


# ಭಗವದ್ಗೀತಾ-ಭಗವಂತನ ನಲ್ನುಡಿ

[ಬನ್ನಂಜೆ ಗೋವಿಂದಾಚಾರ್ಯರ ಗೀತಾ ಪ್ರವಚನ ಆಧಾರಿತ]

ಭಗವದ್ಗೀತೆಯಲ್ಲಿ ಅಡಗಿರುವ ಅಪೂರ್ವ ಅರ್ಥಸಾರಾಂಶ ಹಾಗೂ ದೈನಂದಿನ ಜೀವನದಲ್ಲಿ ಭಗವದ್ಗೀತೆಯ ಮಹತ್ವವನ್ನು ಇಲ್ಲಿ ವಿವರಿಸಲಾಗಿದೆ. ಗೀತೆ ಒಂದು ಜಾತಿಗೆ ಅಥವಾ ಮತಕ್ಕೆ ಮಾತ್ರ ಸಂಬಂಧಪಟ್ಟದ್ದಲ್ಲ. ಇದು ಮಾನವನ ಜೀವನೌಮ್ಯಲ್ಯವನ್ನು ಎತ್ತಿ ಹಿಡಿಯುವ ಕೈಗನ್ನಡಿ. ಮಹಾಭಾರತ ಹೇಳುವುದು ಐದು ಸಾವಿರ ವರ್ಷಗಳ ಹಿಂದೆ ಕೌರವ ಪಾಂಡವರ ನಡುವೆ ನಡೆದ ಇತಿಹಾಸವನ್ನಲ್ಲ. ಇದು ನಮ್ಮ ಜೀವನದ, ಮುಖ್ಯವಾಗಿ ಅಂತರಂಗ ಪ್ರಪಂಚದ ನಿರಂತರ ಹೋರಾಟದ ಚಿತ್ರಣ.

ಪೂಜ್ಯ ಬನ್ನಂಜೆ ಗೋವಿಂದಾಚಾರ್ಯರು ತಮ್ಮ ಗೀತಾ ಪ್ರವಚನದಲ್ಲಿ ವಿವರಿಸಿದ ಭಗವದ್ಗೀತೆಯ ಅರ್ಥಸಾರವನ್ನು ಇ-ಪುಸ್ತಕ ರೂಪದಲ್ಲಿ ಸೆರೆ ಹಿಡಿದು ಆಸಕ್ತ ಭಕ್ತರಿಗೆ ತಲುಪಿಸುವ ಒಂದು ಕಿರುಪ್ರಯತ್ನ ಇಲ್ಲಿ ಮಾಡಲಾಗಿದೆ.

**Visit us @:** http://bhagavadgitakannada.blogspot.com

ಚಿತ್ರಕೃಪೆ: ಅಂತರ್ಜಾಲ

# ಭಗವದ್ಗೀತಾ-ಭಗವಂತನ ನಲ್ನುಡಿ

# ಓದುವ ಮೊದಲು

'ಭಗವದ್ಗೀತಾ-ಭಗವಂತನ ನಲ್ನುಡಿ' ಈ ಪುಸ್ತಕವನ್ನು ಸಂಸ್ಕೃತದ ಬಗ್ಗೆ ಹೆಚ್ಚು ತಿಳುವಳಿಕೆ ಇಲ್ಲದ, ಆದರೆ ಅಧ್ಯಾತ್ಮದಲ್ಲಿ ಅತ್ಯಂತ ಆಸಕ್ತಿ ಉಳ್ಳವರನ್ನು ಗಮನದಲ್ಲಿಟ್ಟುಕೊಂಡು ಬರೆಯಲಾಗಿದೆ. ಕ್ಲಿಷ್ಟವಾದ ಶ್ಲೋಕಗಳನ್ನು ಸರಿಯಾಗಿ ಪಠಿಸಲು ಸಹಾಯವಾಗಲೆಂದು ಸಂಸ್ಕೃತ ಶ್ಲೋಕಗಳನ್ನು ಮೊದಲು ಪ್ರಸ್ತುತಪಡಿಸಿ, ಅದರ ಕೆಳಗೆ ಶ್ಲೋಕದಲ್ಲಿನ ಪದಗಳನ್ನು ಬಿಡಿಸಿ ಬರೆಯಲಾಗಿದೆ. ಶ್ಲೋಕದ ನಂತರ ಆ ಶ್ಲೋಕದ ಅತ್ಯಂತ ಸಂಕ್ಷಿಪ್ತ ಅರ್ಥವನ್ನು ಕೊಡಲಾಗಿದೆ. ಗೀತಾ ಶ್ಲೋಕದಲ್ಲಿನ ಪ್ರತೀ ಪದವನ್ನು ಬಿಡಿಸಿ, ಅದರ ಅರ್ಥ ವಿಶ್ಲೇಷಣೆ ಮಾಡಿ ನೋಡಿದರೆ ಒಂದೊಂದು ಶ್ಲೋಕ ಅನೇಕ ವಿಧದಲ್ಲಿ ತೆರೆದುಕೊಳ್ಳುತ್ತದೆ. ಕೇವಲ ಮಧ್ವಾಚಾರ್ಯರಂತಹ ದೈವಾಂಶಸಂಭೂತರಷ್ಟೇ ಈ ಎಲ್ಲಾ ಅರ್ಥ ವಿಶ್ಲೇಷಣೆಯನ್ನು ತಿಳಿದು ಹೇಳಬಲ್ಲವರು. ಒಬ್ಬ ಸಾಮಾನ್ಯ ವ್ಯಕ್ತಿ ಇಷ್ಟೊಂದು ವಿಷಯಗಳನ್ನು ಏಕಕಾಲದಲ್ಲಿ ಗ್ರಹಿಸಲು ಸಾಧ್ಯವಿಲ್ಲ.

ಪೂಜ್ಯ ಬನ್ನಂಜೆ ಗೋವಿಂದಾಚಾರ್ಯರು ಬೆಂಗಳೂರಿನಲ್ಲಿ ಸುಮಾರು ಹನ್ನೆರಡು ವರ್ಷಗಳ ಅವಧಿಯಲ್ಲಿ, ಒಬ್ಬ ಸಾಮಾನ್ಯ ಮನುಷ್ಯನಿಗೆ ಅರ್ಥವಾಗುವಂತೆ ಮಾಡಿದ 'ಗೀತಾ ಪ್ರವಚನ'ವನ್ನು ಬಳಸಿಕೊಂಡು ಇಲ್ಲಿ ಪ್ರತೀ ಶ್ಲೋಕದ ವಿವರಣೆಯನ್ನು ಪ್ರಸ್ತುತಪಡಿಸಲಾಗಿದೆ. ಓದುಗರು ಸಾಧ್ಯವಾದರೆ ಆಚಾರ್ಯರ ಗೀತಾ ಪ್ರವಚನದ ಧ್ವನಿಸುರುಳಿಯನ್ನು ಮೊದಲು ಕೇಳಬೇಕಾಗಿ ಇಲ್ಲಿ ವಿನಂತಿಸಿಕೊಳ್ಳುತ್ತಿದ್ದೇವೆ. ಸುಮಾರು 350 ಗಂಟೆಗಳ ಈ ಧ್ವನಿಸುರುಳಿ ನಿಮಗೆ ಗೀತೆಯ ಸ್ಪಷ್ಟ ಚಿತ್ರಣವನ್ನು ಕೊಡುತ್ತದೆ. ಈ ಧ್ವನಿಸುರುಳಿಯನ್ನು ಕೇಳಲು ಸಾಧ್ಯವಾಗದೇ ಇದ್ದವರಿಗೆ ಅನುಕೂಲವಾಗಲೆಂದು ಈ ಪುಸ್ತಕವನ್ನು ಬರೆಯಲಾಗಿದೆ. ಅಧ್ಯಾತ್ಮ ಬಂಧುಗಳು ಇಲ್ಲಿ ಪ್ರಸ್ತುತಪಡಿಸಲಾದ ಗೀತೆಯ ಅಪೂರ್ವ ಅರ್ಥ ಸಾರವನ್ನು ತಿಳಿದು, ತಮ್ಮ ಜೀವನವನ್ನು ಪಾವನಗೊಳಿಸಿಕೊಳ್ಳಬೇಕಾಗಿ ಪ್ರಾರ್ಥಿಸುತ್ತೇವೆ.

ಇಲ್ಲಿ ಪ್ರಸ್ತುತಪಡಿಸಲಾದ ಶ್ಲೋಕಗಳನ್ನು ಮತ್ತು ಶ್ಲೋಕದ ಸಂಕ್ಷಿಪ್ತ ವಿವರಣೆಯನ್ನು ನೇರವಾಗಿ ಬನ್ನಂಜೆ ಗೋವಿಂದಾಚಾರ್ಯರ 'ಭಗವಂತನ ನಲ್ನುಡಿ' ಎನ್ನುವ ಪುಸ್ತಕದಿಂದ ತೆಗೆದುಕೊಳ್ಳಲಾಗಿದೆ. ಗೀತಾ ಶ್ಲೋಕಗಳನ್ನು ಬಿಡಿಸಿ ಬರೆಯಲು ಪೂಜ್ಯ ಭಕ್ತಿವೇದಾಂತ ಸ್ವಾಮಿ ಪ್ರಭುಪಾದ ಅವರ 'ಭಗವದ್ಗೀತಾ ಯಥಾರೂಪ' ಪುಸ್ತಕವನ್ನು ಬಳಸಲಾಗಿದೆ. ಶ್ಲೋಕದ ವಿವರಣೆಯನ್ನು ಬನ್ನಂಜೆ ಗೋವಿಂದಾಚಾರ್ಯರ ಗೀತಾ ಪ್ರವಚನದ ಧ್ವನಿ ಸುರುಳಿಯಿಂದ ತೆಗೆದುಕೊಳ್ಳಲಾಗಿದೆ. ಈ ರೀತಿ ಬರೆಯುವಾಗ ತಿಳುವಳಿಕೆ ಇಲ್ಲದೆ ನಮ್ಮಿಂದ ಏನಾದರೂ ತಪ್ಪಾಗಿದ್ದರೆ ಅದಕ್ಕಾಗಿ ಪೂರ್ವಭಾವಿಯಾಗಿ ಭಗವಂತನಲ್ಲಿ ಕ್ಷಮೆ ಕೇಳಿ –ಈ ಪುಸ್ತಕವನ್ನು ಭಗವಂತನಿಗೆ ಮತ್ತು ಅಧ್ಯಾತ್ಮ ಬಂಧುಗಳಿಗೆ ಅರ್ಪಿಸುತ್ತಿದ್ದೇವೆ.

ನಿಮ್ಮ ಅನಿಸಿಕೆಯನ್ನು ನಮಗೆ ತಲುಪಿಸಲು ಈ ಕೆಳಗಿನ ವೆಬ್ ಸೈಟ್ ನ್ನು ಬಳಸಿ.

**Visit us at : http://bhagavadgitakannada.blogspot.com/**

# ವಿಜ್ಞಾಪನೆ

ಈ ಇ-ಪುಸ್ತಕವನ್ನು ಅಧ್ಯಾತ್ಮದಲ್ಲಿ ಆಸಕ್ತಿಯುಳ್ಳವರಿಗಾಗಿ ನೀಡಲಾಗಿದೆ. ಆದ್ದರಿಂದ ಇದನ್ನು ಯಾವುದೇ ವ್ಯಾಪಾರಕ್ಕಾಗಿ(Commercial purpose) ಬಳಸಬಾರದಾಗಿ ಕೋರಿಕೆ. ಈ ಪುಸ್ತಕವನ್ನು ಆಚಾರ್ಯರ ಪ್ರವಚನ ಕೇಳಿಸಿಕೊಂಡು ಬರೆದಿದ್ದರೂ ಸಹ, ಬರೆಯುವಾಗ ಅನೇಕ ತಪ್ಪುಗಳಾಗಿರಬಹುದು. ಬರೆಯುವವರು ತಮಗೆ ಅರ್ಥವಾದ ರೀತಿಯಲ್ಲಿ ಬರೆದುಕೊಂಡಿರಬಹುದು. ಇಲ್ಲಿ ಹಾಗೆ ಏನಾದರೂ ತಪ್ಪು ಅಂಶ ಕಂಡುಬಂದರೆ ಅದಕ್ಕೆ ಆಚಾರ್ಯರು ಹೊಣೆಗಾರರಲ್ಲ. ಇದಕ್ಕಾಗಿ ಓದುಗರು ನೇರವಾಗಿ ಆಚಾರ್ಯರ ಪ್ರವಚನದ ಧ್ವನಿಸುರುಳಿಯನ್ನು ಕೇಳಿಸಿಕೊಳ್ಳಬೇಕಾಗಿ ವಿನಂತಿಸಿಕೊಳ್ಳುತ್ತೇವೆ. ಈ ಪುಸ್ತಕದ ಮುಖ ಪುಟದಲ್ಲಿ ಬಳಸಲಾದ ಚಿತ್ರ ಅಂತರ್ಜಾಲದಿಂದ ತೆಗೆದುಕೊಂಡಿದ್ದು. ಒಂದು ವೇಳೆ ಆ ಬಗ್ಗೆ ಯಾರದ್ದಾದರೂ ಆಕ್ಷೇಪವಿದ್ದರೆ ದಯವಿಟ್ಟು ನಮಗೆ ಬರೆದು ತಿಳಿಸಿ. ಅದನ್ನು ತಕ್ಷಣ ತೆಗೆದು ಹಾಕಲಾಗುವುದು.



ಜಯತಿ ಪರಾಶರ ಸೂನುಃ ಸತ್ಯವತೀಹೃದಯ ನಂದನೋ ವ್ಯಾಸಃ ।
ಯಸ್ಯಾಽಸ್ಯಕಮಲಗಲಿತಂ ವಾಙ್ಮಯಮ್ ಅಮೃತಂ ಜಗತ್ಪಿಬತಿ ॥

ಭುಜಗಭೋಗಾಭಮುದ್ಯಮ್ಯ ಹೃದ್ಯಂ ನಿಜಭುಜಂ ದಕ್ಷಿಣಂ ಲಕ್ಷಣಾಢ್ಯಮ್ ।
ಲಳಿತಮುದ್ರಿಕ್ತವಿಜ್ಞಾನಮುದ್ರಂ ಭಜಭಜ ಅನಂತಮಿತ್ಯಾಲಪಂತಮ್ ॥
ಪ್ರಣತವಾನ್ ಪ್ರಾಣಿನಾಂ ಪ್ರಾಣಭೂತಂ ಪ್ರಣತಿಭಿಃ ಪ್ರೀಣಯೇ ಪೂರ್ಣಬೋಧಮ್ ॥

ಭವದವೋಷ್ಣೇನ ತಾತಪ್ಯಮಾನಾನ್ ಭುವಿ ಪರಂ ನಾಥಮಪ್ರೇಕ್ಷಮಾಣಾನ್ ।
ಭುವನಮಾನ್ಯೇನ ಚ ಅನ್ಯೇನ ದೋಷ್ಣಾ ಭವತು ಭೀರ್ಮೇತಿ ನಃ ಸಾನ್ತ್ವಯನ್ತಮ್ ॥
ಪ್ರಣತವಾನ್ ಪ್ರಾಣಿನಾಂ ಪ್ರಾಣಭೂತಂ ಪ್ರಣತಿಭಿಃ ಪ್ರೀಣಯೇ ಪೂರ್ಣಬೋಧಮ್ ॥

ನಾರಾಯಣಮ್ ಸುರಗುರುಮ್ ಜಗದೇಕನಾಥಂ ಭಕ್ತ ಪ್ರಿಯಂ ಸಕಲ ಲೋಕ ನಮಸ್ಕೃತಂಚ ।
ತ್ರೈಗುಣ್ಯ ವರ್ಜಿತಂ ಅಜಮ್ ವಿಭುಂ ಆಧ್ಯಂಈಶಂ ವಂದೇ ಭವಘ್ನಂ ಅಮರಾಸುರ ಸಿದ್ಧ ವಂದ್ಯಂ ॥

ನಾರಾಯಣಂ ನಮಸ್ಕೃತ್ಯ ನರಂ ಚೈವ ನರೋತ್ತಮಂ
ದೇವೀಂ ಸರಸ್ವತೀಂ ವ್ಯಾಸಂ  ತತೋ ಜಯಮುದೀರಯೇತ್ ।

 

# ಗುರುಗಳ ಮಾತು

ಮಹಾಭಾರತವು ವೈದಿಕ ವಾಙ್ಮಯದ ಕಲ್ಪವೃಕ್ಷದಲ್ಲರಳಿದ ಪಾರಿಜಾತ ಕುಸುಮ. ಭಗವದ್ಗೀತೆ ಆ ಕುಸುಮದ ಮಕರಂದ. ಇದು ಎಂದೂ ಬತ್ತದ ರಸ ತುಂಬಿದ ಮಕರಂದ. ನಾವು ಅದನ್ನು ಸವಿವ ದುಂಬಿಗಳಾಗಬೇಕು. ನಮ್ಮ ತಟ್ಟೆಯಲ್ಲಿ ತುಂಬುವಷ್ಟು ಹೀರಿ ಹೀರಿ ತುಂಬಿಕೊಳ್ಳಬೇಕು. ಗೀತೆಯ ಸಾರ ಅಲ್ಲಿ ಬಿಂಬಿಸಬೇಕು. ಎಂತಹ ಮಧುರ ಆ ಮಧುರಸ. ಅಂತಹ ರಸವನ್ನು ಸವಿದ ಬಾಳು ಸಾರ್ಥಕ. ಉಳಿದ ಬಾಳು ಬರಿಯ ಗೋಳು.

-ಪೂಜ್ಯ ಬನ್ನಂಜೆ ಗೋವಿಂದಾಚಾರ್ಯರು (ಭಗವಂತನ ನಲ್ನುಡಿ ಪುಸ್ತಕದಿಂದ )

ಏವಂ ಅಪ್ಯ ಅಶುಭಂ ಕರ್ಮ ನ ಭೂತಂ ನ ಭವಿಷ್ಯತಿ ||೧೨-೩೨-೧೮||

"ಆಗಬಾರದ್ದು ಹಿಂದೆ ಆಗಿಲ್ಲ, ಮುಂದೆ ಆಗುವುದೂ ಇಲ್ಲ. ಏನು ಆಗಬೇಕೋ ಅದು ಘಟಿಸಿಯೇ ತೀರುತ್ತದೆ. ಅದನ್ನು ನಾನು ಬೇಡ ಎಂದು ದ್ವೇಷಿಸಿ ಫಲವೇನು?". ಆದ್ದರಿಂದ ತ್ರಿಗುಣವನ್ನು ದಾಟಿದವನು ಬಂದಾಗ 'ಬೇಡ' ಎಂದು ದ್ವೇಷಿಸುವುದಿಲ್ಲ; ಇಲ್ಲದ್ದನ್ನು ಬಯಸುವುದೂ ಇಲ್ಲ. ಎಲ್ಲವನ್ನು ನಿರ್ವಿಕಾರನಾಗಿ ನೋಡುತ್ತಾ, ತುಂಬಿದ ಕೊಡದಂತೆ ತುಳುಕದೇ ಬದುಕುತ್ತಾನೆ.

-ಪೂಜ್ಯ ವೇದವ್ಯಾಸರು (ಮಹಾಭಾರತದ ಶಾಂತಿಪರ್ವ)

ಕುರು ಭುಂಕ್ಷ್ವ ಚ ಕರ್ಮ ನಿಜಂ ನಿಯತಂ ಹರಿಪಾದ ವಿನಮ್ರಧಿಯಾ ಸತತಂ |
ಹರಿರೇವ ಪರೋ ಹರಿರೇವ ಗುರುಃ ಹರಿರೇವ ಜಗತ್ ಪಿತೃಮಾತೃಗತಿಃ || ೩.೧ ||

ನಿನ್ನ ಪಾಲಿನ ಕರ್ಮ ಮಾಡು, ಬಂದುದನ್ನುಣ್ಣು. ಹರಿಯ ಚರಣದ ಅರಿವು ತಪ್ಪದಿರಲಿ. ನನ್ನದು ಎನ್ನುವ ಪ್ರತ್ಯೇಕ ಸಂಕಲ್ಪ ಬೇಡ. ವೇದದಲ್ಲಿ ಹೇಳುವಂತೆ 'ಭಗವಂತನ ಕಾಮನೆಯೇ ನನ್ನ ಕಾಮನೆಯಾಗಲಿ, ಆತನ ಇಚ್ಛೆಯೇ ನನ್ನ ಇಚ್ಛೆಯಾಗಲಿ, ಅದರಿಂದ ನನ್ನ ಕಾಮನೆ ಭಗವಂತನ ಕಾಮನೆಗೆ ಶ್ರುತಿಗೂಡಲಿ'. ಹೀಗೆ ಆದಾಗ ಅಪಸ್ವರ ಹೊರಡುವುದಿಲ್ಲ. ನಮ್ಮ ಬಯಕೆ ಭಗವಂತನ ಇಚ್ಛೆಗೆ ಅನುರಣನವಾದಾಗ(**State of Resonance**) ಬಾಳಿನ ಸಂಗೀತದಲ್ಲಿ ಮಾಧುರ್ಯ ನಿರ್ಮಾಣವಾಗುತ್ತದೆ.

-ಪೂಜ್ಯ ಮಧ್ವಾಚಾರ್ಯರು(ದ್ವಾದಶಸ್ತೋತ್ರ)

# ಪ್ರಸ್ತಾವನೆ

ಭಗವದ್ಗೀತೆ ನಮ್ಮ ಶಾಸ್ತ್ರ ಪರಂಪರೆ ಇತಿಹಾಸದಲ್ಲಿ ಬಹಳ ಮಹತ್ವದ ಗ್ರಂಥ ಎಂದು ಹೆಸರುಪಡೆದಿದೆ. ಪ್ರಾಚೀನರು ಭಗವದ್ಗೀತೆಗೆ ವೇದಕ್ಕಿಂತ ಶ್ರೇಷ್ಠ ಎನ್ನುವಷ್ಟು ಮಹತ್ವ ಕೊಟ್ಟಿದ್ದಾರೆ. ಇದಕ್ಕೆ ಸರಿಸಾಟಿಯಾದ ಕೃತಿ ಇನ್ನೊಂದಿಲ್ಲ. ಎಲ್ಲಾ ಅದ್ಯಾತ್ಮ ಸಾರವನ್ನು ಹೊತ್ತ ಮಹಾಭಾರತದ ಸಾರ-ಭಗವದ್ಗೀತೆ. ಅರ್ಥದ ಭಾರದಿಂದ ತುಂಬಿರುವ ಮಹಾಭಾರತವು ಶಾಸ್ತ್ರಗಳಲ್ಲೇ ಶ್ರೇಷ್ಠ ಗ್ರಂಥ. ಇಂತಹ ಮಹಾಭಾರತದಲ್ಲಿ ಭಗವದ್ಗೀತೆ ಶ್ರೇಷ್ಠ. ಭಗವದ್ಗೀತೆಯನ್ನು ಸಮಗ್ರವಾಗಿ ತಳಸ್ಪರ್ಶಿಯಾಗಿ ಅಧ್ಯಯನ ಮಾಡಿದರೆ ಭಾರತೀಯ ತತ್ವಶಾಸ್ತ್ರದ ಸಮಗ್ರ ದರ್ಶನ ನಮಗಾಗುತ್ತದೆ.

ಮಹಾಭಾರತ ಐತಿಹಾಸಿಕ, ಮನಃಶಾಸ್ತ್ರೀಯ ಮತ್ತು ತತ್ವಶಾಸ್ತ್ರೀಯವಾಗಿ ಮೂರು ಬಗೆಯಿಂದ ತೆರೆದುಕೊಳ್ಳುತ್ತದೆ. ಭಗವದ್ಗೀತೆ ಮನಃಶಾಸ್ತ್ರೀಯ ಮತ್ತು ತತ್ವಶಾಸ್ತ್ರೀಯವಾಗಿ ಮಹಾಭಾರತದ ಸಾರವನ್ನು ಸೆರೆಹಿಡಿದಿದೆ. ಭಗವದ್ಗೀತೆಯಲ್ಲಿ ನಾವು ನೋಡಬೇಕಾದ ಮುಖ ಇತಿಹಾಸವಲ್ಲ, ಬದಲಿಗೆ ಮನಃಶಾಸ್ತ್ರ ಮತ್ತು ಅಧ್ಯಾತ್ಮ.

ಮಹಾಭಾರತವು ಏಳುಪಾತ್ರಗಳ ಮೂಲಕ ಹದಿನೆಂಟು ಜೀವನೌಮ್ಮೌಲ್ಯಗಳ ವಿಶ್ಲೇಷಣೆಯನ್ನು ನಮ್ಮ ಮುಂದಿಡುತ್ತದೆ. ಅವುಗಳೆಂದರೆ:

(೧) ಧರ್ಮರಾಜ - ಧರ್ಮ(೧)

(೨) ಭೀಮಸೇನ - ಭಕ್ತಿ, ಜ್ಞಾನ, ವೈರಾಗ್ಯ, ಪ್ರಜ್ಞಾ, ಮೇಧಾ, ಧೃತಿ, ಸ್ಥಿತಿ, ಯೋಗ, ಪ್ರಾಣ ಮತ್ತು ಬಲ(೧೧)

(೩) ಅರ್ಜುನ - ಶ್ರವಣ, ಮನನ ಮತ್ತು ನಿಧಿಧ್ಯಾಸನ(೧೪)

(೪,೫) ನಕುಲ-ಸಹದೇವ - ಶೀಲ ಮತ್ತು ವಿನಯ(೧೬)

(೬) ದ್ರೌಪದಿ - ವೇದವಿದ್ಯೆ(೧೭)

(೭) ಶ್ರೀಕೃಷ್ಣ – ವೇದವೇದ್ಯ(೧೮)

ನಾವು ಧರ್ಮದ ಚೌಕಟ್ಟಿನ ಮೇಲೆ ಭಕ್ತಿ, ಜ್ಞಾನ, ವೈರಾಗ್ಯ, ಪ್ರಜ್ಞಾ, ಮೇಧಾ, ಧೃತಿ, ಸ್ಥಿತಿ, ಯೋಗ, ಪ್ರಾಣ ಮತ್ತು ಬಲವೆಂಬ ಹತ್ತು ಗುಣಗಳನ್ನು ಮೈಗೂಡಿಸಿಕೊಳ್ಳಬೇಕು. ಶಾಸ್ತ್ರದ ಶ್ರವಣ, ಮನನ ಮತ್ತು ನಿಧಿಧ್ಯಾಸನದೊಂದಿಗೆ ಶೀಲ ಮತ್ತು ವಿನಯಗಳು ನಮ್ಮ ನಿತ್ಯ ಸಂಗಾತಿಗಳಾಗಿರಬೇಕು. ಈ ಹದಿನಾರು ಜೀವನೌಮ್ಮೌಲ್ಯಗಳಿಂದ ಹದಿನೇಳನೇ ವೇದವಿದ್ಯೆಯನ್ನು ಒಲಿಸಿಕೊಂಡು, ಹದಿನೆಂಟನೇ ವೇದವೇದ್ಯ ಭಗವಂತನನ್ನು ತಲುಪುವುದೇ ಗೀತೆಯ ಒಟ್ಟು ಸಾರಾಂಶ. ಆ ಹದಿನೆಂಟನೇ ಭಗವಂತನನ್ನು ತಲುಪಲು ನಾವು ಈ ಹದಿನೇಳು ಮೆಟ್ಟಿಲುಗಳನ್ನು ಬಳಸಬೇಕು.

ಭಾರತೀಯ ತತ್ವಶಾಸ್ತ್ರದ ಅತ್ಯಂತ ಮಹತ್ವದ ಸಂಖ್ಯೆ ಹದಿನೆಂಟು . ಇದು ತತ್ವಶಾಸ್ತ್ರದ ಎಲ್ಲಾ ರಹಸ್ಯವನ್ನು ಬಸಿರಲ್ಲಿ ಬಚ್ಚಿಟ್ಟುಕೊಂಡ ಸಂಖ್ಯೆ. ಮಹಾಭಾರತದಲ್ಲಿ ಕೂಡಾ ಈ ಸಂಖ್ಯಾ ಚಮತ್ಕಾರವನ್ನು ಕಾಣಬಹುದು. ಮಹಾಭಾರತದಲ್ಲಿ ಒಟ್ಟು ಹದಿನೆಂಟು ಪರ್ವಗಳಿವೆ. ಮಹಾಭಾರತದ ಸಾರವಾದ ಗೀತೆಯಲ್ಲಿ ಹದಿನೆಂಟು

ಅಧ್ಯಾಯಗಳಿವೆ. ಮಹಾಭಾರತ ಯುದ್ಧ ನಡೆದಿದ್ದು ಹದಿನೆಂಟು ದಿನ. ಯುದ್ಧದಲ್ಲಿ ಪಾಲ್ಗೊಂಡಿದ್ದು ಹದಿನೆಂಟು ಅಕ್ಷೋಹಿಣಿ ಸೈನ್ಯ.

ಮನಃಶಾಸ್ತ್ರೀಯವಾಗಿ ನೋಡಿದಾಗ ಮಹಾಭಾರತ ಹೇಳುವುದು ಐದು ಸಾವಿರ ವರ್ಷಗಳ ಹಿಂದೆ ಕೌರವ ಪಾಂಡವರ ನಡುವೆ ನಡೆದ ಇತಿಹಾಸವನ್ನಲ್ಲ. ಇದು ನಮ್ಮ ಜೀವನದ, ಮುಖ್ಯವಾಗಿ ಅಂತರಂಗ ಪ್ರಪಂಚದ ನಿರಂತರ ಹೋರಾಟದ ಚಿತ್ರಣ. ನಮ್ಮ ಜೀವನವೇ ಒಂದು ಸಂಗ್ರಾಮ. ನಮ್ಮ ಹೃದಯರಂಗವೇ ಕುರುಕ್ಷೇತ್ರ. ಅದರೊಳಗೆ ನಮ್ಮನ್ನು ದಾರಿ ತಪ್ಪಿಸುವ ಕೌರವರಿದ್ದಾರೆ, ಎಚ್ಚರಿಸುವ ಪಾಂಡವರೂ ಇದ್ದಾರೆ. ಹದಿನೆಂಟು ಅಕ್ಷೋಹಿಣಿ ಸೇನೆಯೂ ಇದೆ. ಆದರೆ ನಮ್ಮ ಹೋರಾಟದಲ್ಲಿ ಪಾಂಡವರು ಸೋತು ಕೌರವರು ಗೆದ್ದುಬಿಡುವ ಸಂಭವ ಹೆಚ್ಚು. ಆದರೆ ಹಾಗಾಗದೇ ನಮ್ಮಲ್ಲೂ ಪಾಂಡವರೇ ಗೆಲ್ಲಬೇಕು. ಅದಕ್ಕಾಗಿ ನಮ್ಮ ಬಾಳ ರಥದ ಸಾರಥ್ಯವನ್ನು ಆ ಭಗವಂತನ ಕೈಗೊಪ್ಪಿಸಬೇಕು. ಇದೇ ನರ(ಅರ್ಜುನ)ನ ಮೂಲಕ ನಮಗೆ ನಾರಾಯಣನಿತ್ತ ಗೀತೋಪದೇಶ.

ಭಗವದ್ಗೀತೆಯಲ್ಲಿ ಅಡಗಿರುವ ಅಪೂರ್ವ ಅರ್ಥಸಾರಾಂಶ ಹಾಗೂ ದೈನಂದಿನ ಜೀವನದಲ್ಲಿ ಭಗವದ್ಗೀತೆಯ ಮಹತ್ವವನ್ನು ಇಲ್ಲಿ ವಿವರಿಸಲಾಗಿದೆ. ಗೀತೆ ಒಂದು ಜಾತಿಗೆ ಅಥವಾ ಮತಕ್ಕೆ ಮಾತ್ರ ಸಂಬಂಧಪಟ್ಟದ್ದಲ್ಲ. ಇದು ಮಾನವನ ಜೀವನೌಲ್ಯವನ್ನು ಎತ್ತಿ ಹಿಡಿಯುವ ಕೈಗನ್ನಡಿ. ಬನ್ನಿ ಇಂತಹ ಅಪೂರ್ವ ಕೃತಿಯನ್ನು ನಮ್ಮ ಯೋಗ್ಯತೆ ಇದ್ದಷ್ಟು ಅರಿಯಲು ಪ್ರಯತ್ನಿಸೋಣ.



# ಅಧ್ಯಾಯ ಒಂದು

ಸಾಮಾನ್ಯವಾಗಿ ಭಗವದ್ಗೀತೆಗೆ ಭಾಷ್ಯ ಬರೆಯುವವರು ಮೊದಲ ಅಧ್ಯಾಯಕ್ಕೆ ಹೆಚ್ಚು ಒತ್ತು ಕೊಡದೇ, ನೇರವಾಗಿ ಎರಡನೇ ಅಧ್ಯಾಯದಲ್ಲಿ- 'ಯುದ್ಧರಂಗದಲ್ಲಿ ಗೊಂದಲಕ್ಕೊಳಗಾದ ಅರ್ಜುನನಿಗೆ ಕೃಷ್ಣನ ಉಪದೇಶ' ಎಂದು ಪ್ರಾರಂಭಿಸುತ್ತಾರೆ. ಆದರೆ ಮೊದಲ ಅಧ್ಯಾಯದಲ್ಲಿ ಮನಃಶಾಸ್ತ್ರಕ್ಕೆ(psychology) ಸಂಬಂಧಪಟ್ಟ ಅನೇಕ ವಿಷಯಗಳಿವೆ. ಈ ಹಿನ್ನೆಲೆಯಲ್ಲಿ ಭಗವದ್ಗೀತೆಯ ಈ ಅಧ್ಯಾಯವನ್ನು 'ಅರ್ಜುನ ವಿಷಾದ ಯೋಗ' ಎಂದು ಕರೆಯುವುದು ಪ್ರಸ್ತುತವಲ್ಲ. ಈ ಅಧ್ಯಾಯದಲ್ಲಿ ಯುದ್ಧ ನಡೆಯುವ ಪೂರ್ವ ಕ್ಷಣದಲ್ಲಿ ಯುದ್ಧ ಭೂಮಿಯಲ್ಲಿ ನಿಂತಿದ್ದ ಅರ್ಜುನ ಹಾಗೂ ದುರ್ಯೋಧನರ ಮನಸ್ಥಿತಿ ಹೇಗಿತ್ತು ಎನ್ನುವ ಅಪೂರ್ವ ವಿಶ್ಲೇಷಣೆ ಅಡಗಿದೆ. ಅರ್ಜುನನ ಮನಸ್ಸಿನ ಗೊಂದಲಕ್ಕೆ ಶ್ರೀಕೃಷ್ಣ ಪರಿಹಾರದ ಉಪದೇಶ ಕೊಟ್ಟ. ಆದರೆ ದುಷ್ಟ ದುರ್ಯೋಧನ ಗೊಂದಲದಿಂದಲೇ ಸತ್ತ. ಆದ್ದರಿಂದ ಮೊದಲ ಅಧ್ಯಾಯವನ್ನು ನಾವು ಐತಿಹಾಸಿಕ ದೃಷ್ಟಿಯಿಂದ ಕಾಣದೇ ಇಲ್ಲಿರುವ ಮನಃಶಾಸ್ತ್ರವನ್ನು ಅರಿಯಲು ಪ್ರಯತ್ನಿಸಬೇಕು. ಇಲ್ಲಿ ಹೇಳಿರುವ ಮನಃಶಾಸ್ತ್ರ ಕೇವಲ ಯುದ್ಧಭೂಮಿಯಲ್ಲಿ ನಿಂತವರಿಗೆ ಮಾತ್ರ ಸಂಬಂಧಪಟ್ಟದ್ದಲ್ಲ. ಇದು ನಮ್ಮ ದೈನಂದಿನ ಜೀವನಕ್ಕೆ ಸಂಬಂಧಪಟ್ಟದ್ದು. ಈ ಎಚ್ಚರದಿಂದ ಇಲ್ಲಿ ಬರುವ ವಿಚಾರವನ್ನು ಸೂಕ್ಷ್ಮವಾಗಿ ಗಮನಿಸಿದರೆ ಮಾತ್ರ ನಮಗೆ ಈ ಅಧ್ಯಾಯ ಅರ್ಥವಾಗುತ್ತದೆ.

ಭಗವದ್ಗೀತೆ ಪ್ರಾರಂಭವಾಗುವುದು ಧೃತರಾಷ್ಟ್ರನ ಪ್ರಶ್ನೆಯಿಂದ. ಧೃತರಾಷ್ಟ್ರ ಎಂದರೆ ರಾಷ್ಟ್ರವನ್ನು(ಪುರವನ್ನು) ಧಾರಣೆ ಮಾಡಿದವ ಎಂದರ್ಥ. ಅಂದರೆ ಸತ್ಯದ ಬಗ್ಗೆ ಕುರುಡಾಗಿ ಕಣ್ಮುಚ್ಚಿ ಮಲಗಿರುವ ಜೀವವೇ ಧೃತರಾಷ್ಟ್ರ. ದುರ್ಯೋಧನ ಎನ್ನುವುದು ನಮ್ಮೊಳಗಿರುವ ದುಷ್ಟತನದ ಪರಾಕಾಷ್ಠೆಯ ಸಂಕೇತ. ಭೀಷ್ಮ-ದ್ರೋಣ-ಕೃಪಾ-ಶಲ್ಯ-ಕರ್ಣ-ಇವರೆಲ್ಲರೂ ನಮ್ಮ ಇಂದ್ರಿಯಗಳಂತೆ. ನಮ್ಮ ಮನಸ್ಸಿನಲ್ಲಿರುವ ಕೆಟ್ಟತನದಿಂದ ನಾವು ನಮ್ಮಲ್ಲಿರುವ ಅಮೂಲ್ಯವಾದ ಇಂದ್ರಿಯಗಳನ್ನು ಕೆಟ್ಟ ಕಾರ್ಯಕ್ಕೆ ಬಳಸುತ್ತೇವೆ. ವಸ್ತುತಃ ಇಂದ್ರಿಯಗಳು ಕೆಟ್ಟವಲ್ಲ. ಆದರೆ ಕೆಟ್ಟದ್ದರ ಜೊತೆ ಸೇರಿ ಕೆಟ್ಟದ್ದನ್ನು ಮಾಡುತ್ತವೆ. ಈ ರೀತಿ ಗೀತೆಯ ಪ್ರತಿಯೊಂದು ಶ್ಲೋಕದಲ್ಲಿ, ಮಹಾಭಾರತದ ಪ್ರತಿಯೊಂದು ಪಾತ್ರದಲ್ಲಿ ಅತ್ಯಮೂಲ್ಯವಾದ ಹಾಗೂ ಗುಹ್ಯವಾದ ಅರ್ಥ ಅಡಗಿದೆ.

ಧೃತರಾಷ್ಟ್ರ ಉವಾಚ ।
ಧರ್ಮಕ್ಷೇತ್ರೇ ಕುರುಕ್ಷೇತ್ರೇ ಸಮವೇತಾ ಯುಯುತ್ಸವಃ ।
ಮಾಮಕಾಃ ಪಾಂಡವಾಶ್ಚೈವ ಕಿಮಕುರ್ವತ ಸಂಜಯ ॥೧॥

ಧೃತರಾಷ್ಟ್ರಃ ಉವಾಚ- ಧೃತರಾಷ್ಟ್ರ ಕೇಳಿದನು:
ಧರ್ಮಕ್ಷೇತ್ರೇ ಕುರುಕ್ಷೇತ್ರೇ ಸಮವೇತಾಃ ಯುಯುತ್ಸವಃ।
ಮಾಮಕಾಃ ಪಾಂಡವಾಃ ಚ ಏವ ಕಿಮ್ ಅಕುರ್ವತ ಸಂಜಯ -- ಧರ್ಮದ ತಾಣವಾದ ಕುರುಕ್ಷೇತ್ರದಲ್ಲಿ ಯುದ್ಧದ ಬಯಕೆಯಿಂದ ನೆರೆದ ನನ್ನವರು ಮತ್ತು ಪಾಂಡವರು ಏನು ಮಾಡಿದರು ಸಂಜಯನೇ ?

ಈ ಹಿಂದೆ ಹೇಳಿದಂತೆ ಕುರುಡ ಧೃತರಾಷ್ಟ್ರನ ಪ್ರಶ್ನೆ 'ಜೀವದ' ಕುರುಡು ಪ್ರಶ್ನೆ ಕೂಡಾ ಹೌದು. ನಾವು ಎಷ್ಟು ಕುರುಡರು ಎಂದರೆ ನಮಗೆ ಏನೂ ಗೊತ್ತಿಲ್ಲ ಎನ್ನುವ ವಿಷಯ ಕೂಡಾ ನಮಗೆ ಗೊತ್ತಿಲ್ಲ! ಆದ್ದರಿಂದ ಗೀತೆ ಧೃತರಾಷ್ಟ್ರನ ಪ್ರಶ್ನೆಯಿಂದಲೇ ಆರಂಭವಾಗುತ್ತದೆ.

ಕಣ್ಣು ಕಾಣದ ಧೃತರಾಷ್ಟ್ರ ದೂರದರ್ಶನ ಹಾಗೂ ದೂರಶ್ರವಣ ಶಕ್ತಿಯನ್ನು ವ್ಯಾಸರಿಂದ ಪಡೆದ ಸಂಜಯನಲ್ಲಿ ಹಾಕಿದ ಪ್ರಶ್ನೆಯೇ ಗೀತೆಯ ಮೊದಲ ಶ್ಲೋಕ. ಪರಶುರಾಮನಿಂದ ಸಮಂತಪಂಚಕ (ಸುತ್ತಲೂ ಐದು ಸರೋವರ) ನಿರ್ಮಿಸಲ್ಪಟ್ಟು ಧರ್ಮಕ್ಷೇತ್ರ ಎನಿಸಿದ್ದ ಈ ಯುದ್ಧ ಭೂಮಿ, ಆನಂತರ 'ಕುರು' ಎನ್ನುವ ರಾಜನ ಕಾಲದಲ್ಲಿ ಪರಮ ಧಾರ್ಮಿಕಕ್ಷೇತ್ರವಾಗಿ ಕುರುಕ್ಷೇತ್ರವಾಯಿತು. ಇದನ್ನೇ ಇಲ್ಲಿ "ಧರ್ಮಕ್ಷೇತ್ರೇ ಕುರುಕ್ಷೇತ್ರೇ" ಎಂದು ಸಂಬೋಧಿಸಿದ್ದಾರೆ. ನಮ್ಮ ಹೃದಯ-ಧರ್ಮಕ್ಷೇತ್ರ. ಯಾವುದು ಧರ್ಮ, ಯಾವುದು ಅಧರ್ಮ ಎಂದು ತೀರ್ಮಾನ ಮಾಡುವ ಮನಸ್ಸು(Mind)-ಕುರುಕ್ಷೇತ್ರ(ಕರ್ಮಕ್ಷೇತ್ರ). ಮನಸ್ಸಿನ ಸಂಘರ್ಷಣೆಯೇ ಮಹಾಭಾರತ ಯುದ್ಧ.

ಇಲ್ಲಿ ಕುರುಡ ಧೃತರಾಷ್ಟ್ರ ಸಂಜಯನಲ್ಲಿ ಕೇಳುತ್ತಾನೆ: "ಹೋರಾಟ ಬಯಸಿ ಎದುರುಬದುರಾದ 'ನನ್ನವರು' ಮತ್ತು 'ಪಾಂಡವರು' ಏನು ಮಾಡಿದರು?" ಎಂದು. ಇಲ್ಲಿ 'ನನ್ನವರು ಮತ್ತು ಪಾಂಡವರು' ಎಂದು ಸಂಬೋಧಿಸುವುದರ ಮೂಲಕ ಆಳುವ ದೊರೆಯಾಗಿದ್ದ ಧೃತರಾಷ್ಟ್ರ ತನ್ನಲ್ಲಿರುವ ದೌರ್ಬಲ್ಯವನ್ನು ವ್ಯಕ್ತಪಡಿಸುತ್ತಿರುವುದು ಈ ಶ್ಲೋಕದಲ್ಲಿ ಸ್ಪಷ್ಟವಾಗಿ ಎದ್ದು ಕಾಣುತ್ತದೆ.

ಸಂಜಯ ಉವಾಚ ।

ದೃಷ್ಟ್ವಾ ತು ಪಾಂಡವಾನೀಕಂ ವ್ಯೂಢಂ ದುರ್ಯೋಧನಸ್ತದಾ।
ಆಚಾರ್ಯಮುಪಸಂಗಮ್ಯ ರಾಜಾ ವಚನಮಬ್ರವೀತ್ ॥೨॥

ಸಂಜಯ ಉವಾಚ- ಸಂಜಯ ಹೇಳುತ್ತಾನೆ:

ದೃಷ್ಟ್ವಾ ತು ಪಾಂಡವ ಅನೀಕಮ್ ವ್ಯೂಢಮ್ ದುರ್ಯೋಧನಃ ತದಾ ।

ಆಚಾರ್ಯಮ್ ಉಪಸಂಗಮ್ಯ ರಾಜಾ ವಚನಮ್ ಅಬ್ರವೀತ್ -- ಆಗ ದೊರೆಯಾದ ದುರ್ಯೋಧನ ಸಜ್ಜುಗೊಂಡ ಪಾಂಡವ ಪಡೆಯನ್ನು ಕಂಡು, ಆಚಾರ್ಯರತ್ತ ನಡೆದು ಮಾತನಾಡಿದನು.

ಈ ಶ್ಲೋಕವನ್ನು ವಿಶ್ಲೇಷಿಸುವ ಮೊದಲು ಇಲ್ಲಿ ಬಂದಿರುವ 'ಅನೀಕ' ಎನ್ನುವ ಪದದ ಅರ್ಥವನ್ನು ಸ್ವಲ್ಪ ತಿಳಿದುಕೊಳ್ಳೋಣ. ನಿಮಗೆ ತಿಳಿದಂತೆ ಮಹಾಭಾರತ ಯುದ್ಧದಲ್ಲಿ ಪಾಲ್ಗೊಂಡಿದ್ದು ಹದಿನೆಂಟು ಅಕ್ಷೋಹಿಣಿ ಸೈನ್ಯ. ಅದರಲ್ಲಿ ಏಳು ಅಕ್ಷೋಹಿಣಿ ಪಾಂಡವರ ಕಡೆ ಹೋರಾಟ ಮಾಡಿದರೆ ಉಳಿದ ಸೈನ್ಯ ಕೌರವನ ಕಡೆಯದು. ಇಲ್ಲಿ ಅಕ್ಷೋಹಿಣಿ ಎನ್ನುವುದು ಸೇನೆಯ ಅತಿದೊಡ್ಡ ವಿಭಾಗ. ಹಿಂದಿನ ಕಾಲದಲ್ಲಿ ಸೇನೆಯನ್ನು ಒಂಬತ್ತು ವಿಭಾಗಗಳಾಗಿ ವಿಂಗಡಿಸುತ್ತಿದ್ದರು. ಅವುಗಳೆಂದರೆ:

(೧) ಪತ್ತಿ: ಒಂದು ಆನೆ; ಒಂದು ರಥ; ಮೂರು ಕುದುರೆ ಹಾಗೂ ಐದು ಕಾಲಾಳುಗಳ ಒಂದು ತುಕಡಿ.

(೨) ಸೇನಾಮುಖ: ಮೂರು ಪತ್ತಿ

(೩) ಗುಲ್ಮ: ಮೂರು ಸೇನಾ ಮುಖ

(೪) ಗಣ : ಮೂರು ಗುಲ್ಮ

**(೫) ವಾಹಿನಿ : ಮೂರು ಗಣ**

**(೬) ಪೃತನಾ: ಮೂರು ವಾಹಿನಿ**

**(೭) ಚಮೂ: ಮೂರು ಪೃತನಾ**

**(೮) ಅನೀಕಿನಿ: ಮೂರು ಚಮೂ**

**(೯) ಅಕ್ಷೋಹಿಣಿ: ಹತ್ತು ಅನೀಕಿನಿ- ಅಂದರೆ 21870 ಆನೆಗಳು, 21870 ರಥ, 65610 ಕುದುರೆಗಳು, 1,09,350 ಕಾಲಾಳುಗಳು. (ಇಲ್ಲಿರುವ ಸಂಖ್ಯಾ ಚಮತ್ಕಾರವನ್ನು ಗಮನಿಸಿ: 2+1+8+7+0=18; 6+5+6+1+0=18; 1+0+9+3+5+0=18).**

**ಈ ಮೇಲಿನ ಲೆಕ್ಕಾಚಾರದಂತೆ ಒಂದು ಅನೀಕಿನಿ ಎಂದರೆ ಹತ್ತನೇ ಒಂದು ಅಕ್ಷೋಹಿಣಿ. ಅಂದರೆ 2187 ಆನೆಗಳು, 2187 ರಥ, 6561 ಕುದುರೆಗಳು, 1,09,35 ಕಾಲಾಳುಗಳು. ಇದು ಪಾಂಡವ ಸೇನೆಯ ಎಪ್ಪತ್ತನೇ ಒಂದು ಭಾಗ. ಯುದ್ಧ ಮಾಡುವಾಗ ಎಲ್ಲಾ ಹದಿನೆಂಟು ಅಕ್ಷೋಹಿಣಿ ಒಮ್ಮೆಗೇ ಸೇರಿ ಯುದ್ಧ ಮಾಡುವುದಿಲ್ಲ. ಒಂದು ತುಕಡಿ ಒಮ್ಮೆಗೆ ಒಂದು ನಿರ್ಧಿಷ್ಟ ವ್ಯೂಹ ರಚಿಸಿ ಹೋರಾಟ ಮಾಡುತ್ತಾರೆ.**

**ವಿಶಿಷ್ಟವಾದ ವಿನ್ಯಾಸದಿಂದ( ವ್ಯೂಢಂ) ಶಿಸ್ತುಬದ್ಧವಾಗಿ ಸಜ್ಜಾಗಿ ನಿಂತ ಪಾಂಡವ ಸೇನೆಯ ಒಂದು 'ಅನೀಕ' ವನ್ನು ಕಂಡಾಗ ದುರ್ಯೋಧನನ ದುಗುಡ ಹೆಚ್ಚುತ್ತದೆ. ಇದು ಮಾನಸಿಕವಾಗಿ ಆತನಿಗಾಗುತ್ತಿರುವ ಮೊದಲ ಆಘಾತ. ಈ ಮಾನಸಿಕ ಸ್ಥಿತಿಯಲ್ಲಿ ಆತ ಆಚಾರ್ಯರ ಬಳಿ ಹೋಗುತ್ತಾನೆ. ಇಲ್ಲಿ ಆಚಾರ್ಯ ಅಂದರೆ ಗುರುಗಳಲ್ಲಿ ಹಿರಿಯರಾದ ದ್ರೋಣಾಚಾರ್ಯರು. ಅವರ ಬಳಿಗೆ ಹೋಗಿ ನಮಸ್ಕರಿಸಿ; ಶಿಷ್ಯನ ರೀತಿ ವರ್ತಿಸದೇ, ತಾನು ರಾಜ ಎನ್ನುವಂತೆ ಅಹಂಕಾರದಿಂದ ಆಡಬಾರದ ರೀತಿ ಮಾತನಾಡುತ್ತಾನೆ.**

**ಈ ಶ್ಲೋಕದಲ್ಲಿ ಮನಃಶಾಸ್ತ್ರಕ್ಕೆ ಸಂಬಂಧಪಟ್ಟ ವಿಷಯವನ್ನು ಸೂಕ್ಷ್ಮವಾಗಿ ಗಮನಿಸಿ. ಯುದ್ಧ ಭೂಮಿಗೆ "ತಾನು ಗೆದ್ದೇ ಗೆಲ್ಲುತ್ತೇನೆ" ಎಂದು ಬಂದಿದ್ದ ದುರ್ಯೋಧನ, ಪಾಂಡವರ ಒಂದು ಅನೀಕವನ್ನು ನೋಡಿದಾಕ್ಷಣ ಮಾನಸಿಕ ಅಸಮತೋಲನ ಹೊಂದುತ್ತಾನೆ. ಅದರಿಂದ ಆತ ಹೇಗೆ ತಳಮಳಗೊಂಡ ಎನ್ನುವುದನ್ನು ಈ ಶ್ಲೋಕದಲ್ಲಿ 'ದೃಷ್ಟ್ವಾ ತು(ಮೇಲಂತೂ)' ಎನ್ನುವಲ್ಲಿ ಒತ್ತಿ ಹೇಳಿದ್ದಾರೆ. ತನ್ನಲ್ಲಿ ಹನ್ನೊಂದು ಅಕ್ಷೋಹಿಣಿ ಸೈನ್ಯ ಇದ್ದಾಗ್ಯೂ, ಪಾಂಡವರ ಒಂದು ಪುಟ್ಟ ಅನೀಕವನ್ನು ಕಂಡು ಮಾನಸಿಕವಾಗಿ ವಿಪ್ಲವನಾದ ದುರ್ಯೋಧನ, ಆಚಾರ್ಯ ದ್ರೋಣರಲ್ಲಿ ಹೋಗಿ ಹೇಗೆ ಅಹಂಕಾರದಿಂದ ಮಾತನಾಡಿದ ಎನ್ನುವುದನ್ನು ಮುಂದಿನ ಶ್ಲೋಕದಲ್ಲಿ ನೋಡೋಣ.**

**ಪಶ್ಯೈತಾಂ ಪಾಂಡುಪುತ್ರಾಣಾಮಾಚಾರ್ಯ ಮಹತೀಂ ಚಮೂಮ್।**
**ವ್ಯೂಢಾಂ ದ್ರುಪದಪುತ್ರೇಣ ತವ ಶಿಷ್ಯೇಣ ಧೀಮತಾ ॥ ೩ ॥**

**ಪಶ್ಯ ಎತಾಮ್ ಪಾಂಡುಪುತ್ರಾಣಾಮ್ ಆಚಾರ್ಯ ಮಹತೀಮ್ ಚಮೂಮ್ ।**
**ವ್ಯೂಢಾಮ್ ದ್ರುಪದಪುತ್ರೇಣ ತವ ಶಿಷ್ಯೇಣ ಧೀ-ಮತಾ -- ನೋಡು ಆಚಾರ್ಯ, ಪಾಂಡು ಪುತ್ರರ ಈ ದೊಡ್ಡ ದಂಡನ್ನು. ನಿನ್ನ ಜಾಣ ಶಿಷ್ಯ ದ್ರುಪದ ಪುತ್ರನಿಂದ ಸಜ್ಜುಗೊಂಡಿದ್ದನ್ನು.**

ದುರ್ಯೋಧನ ಸೇನಾಧಿಪತಿ ಭೀಷ್ಮರ ಬಳಿ ಹೋಗದೆ, ದ್ರೋಣಾಚಾರ್ಯರ ಬಳಿ ಹೋಗಿ, ಭೀಷ್ಮಾಚಾರ್ಯರಿಗೆ ಕೇಳುವಂತೆ, ಆಚಾರ್ಯ ದ್ರೋಣರಲ್ಲಿ ನಂಜಿನ ಮಾತನ್ನಾಡುತ್ತಾನೆ. ಇಲ್ಲಿ ದ್ರೋಣರನ್ನು ದುರ್ಯೋಧನ "ಪಾಂಡವರ ಆಚಾರ್ಯ" ಎಂದು ಚುಚ್ಚಿ ಸಂಬೋಧಿಸುತ್ತಾನೆ. "ತನ್ನ ಪ್ರೀತಿಯ ಶಿಷ್ಯರು ಎಂದು ಉದಾರ ತೋರಬೇಡಿ" ಎನ್ನುವುದು ಆತನ ಈ ಮಾತಿನ ಅರ್ಥ.

ಪಾಂಡವರ ಸೇನಾಧಿಪತ್ಯವನ್ನು ದ್ರುಪದ ಪುತ್ರನಾದ ದೃಷ್ಟಧ್ಯುಮ್ನ ವಹಿಸಿರುತ್ತಾನೆ. ದ್ರುಪದ ಮತ್ತು ದ್ರೋಣರು ಬಾಲ್ಯ ಸ್ನೇಹಿತರು. ಆದರೆ ಕೆಲಕಾಲಾನಂತರ ದ್ರುಪದ ಸಿಂಹಾಸನವೇರುತ್ತಾನೆ. ಆ ಸಮಯದಲ್ಲಿ ಬಡ ಬ್ರಾಹ್ಮಣನಾದ ದ್ರೋಣ ತನ್ನ ಮಗನಿಗೆ ಹಾಲು ಕುಡಿಸಲು ಒಂದು ಹಸುವನ್ನು ಕೊಡು ಎಂದು ದ್ರುಪದನನ್ನು ಬಾಲ್ಯದ ಸಲಿಗೆಯಲ್ಲಿ ಕೇಳಿಕೊಂಡು ಬರುತ್ತಾನೆ. ಆದರೆ ದ್ರುಪದ "ನಿನಗೆ ನನ್ನನ್ನು ಸ್ನೇಹಿತ ಎಂದು ಕರೆಯುವ ಯೋಗ್ಯತೆ ಇಲ್ಲ, ನಾನು ರಾಜ, ಆದರೆ ನೀನೊಬ್ಬ ಬಡ ಬ್ರಾಹ್ಮಣ. ನನಗೂ ನಿನಗೂ ಎಂತಹ ಸ್ನೇಹ" ಎಂದು ಹೇಳಿ ಅಪಮಾನಗೊಳಿಸುತ್ತಾನೆ. ಇದೇ ದ್ವೇಷದಿಂದ ದ್ರೋಣಾಚಾರ್ಯರು ಕೌರವ-ಪಾಂಡವರ ಗುರುವಾಗಿ ಸೇರಿ, ಅವರ ವಿಧ್ಯಾಭಾಸ ಮುಗಿದ ಮೇಲೆ ಪಾಂಡವರಿಂದ ದ್ರುಪದನನ್ನು ಸೆರೆಹಿಡಿದು, ಆತನ ಅರ್ಧ ರಾಜ್ಯವನ್ನು ಕಿತ್ತುಕೊಂಡು, "ಈಗ ನಾನು ನಿನಗೆ ಸಮನಾಗಿದ್ದೇನೆ. ಈಗಲಾದರೂ ನನ್ನನ್ನು ಸ್ನೇಹಿತ ಎಂದು ಒಪ್ಪಿಕೋ" ಎನ್ನುತ್ತಾರೆ. ಇದೇ ಸೇಡಿನಿಂದ ದ್ರುಪದ ಒಂದು ಮಹಾಯಾಗವನ್ನು ಮಾಡಿ ದ್ರೋಣನನ್ನು ಕೊಲ್ಲಬಲ್ಲ ಮಗನನ್ನು ವರವಾಗಿ ಪಡೆದು ಆತನನ್ನು ದ್ರೋಣಾಚಾರ್ಯರಲ್ಲೇ ವಿದ್ಯಾಭ್ಯಾಸ ಮಾಡಿಸಿ, ತನ್ನ ಸೇಡನ್ನು ತೀರಿಸಿಕೊಳ್ಳಲು ಕಾಯುತ್ತಿರುತ್ತಾನೆ. ಆತನೇ ದೃಷ್ಟಧ್ಯುಮ್ನ-ಪಾಂಡವ ಸೇನಾಧಿಪತಿ.

ದುರ್ಯೋಧನ ದ್ರೋಣನನ್ನು ಕುರಿತು "ನಿಮ್ಮ ಶಿಷ್ಯ-ದ್ರುಪದ ಪುತ್ರ, ಅತೀ ಹತ್ತಿರದಲ್ಲಿ, ಶಿಸ್ತುಬದ್ಧವಾಗಿ ನಿರ್ಮಿಸಿರುವ ಸೇನಾ(ಚಮೂ) ವ್ಯೂಹವನ್ನು ನೋಡಿರಿ" ಎಂದು ಕುಹಕದಿಂದ ನುಡಿಯುತ್ತಾನೆ. ಇಲ್ಲಿ ಅಂತರಂಗದಲ್ಲಿ ಭಯಗೊಂಡ ದುರ್ಯೋಧನ ಕ್ಷಣಕ್ಷಣಕ್ಕೂ ಮಾಡುತ್ತಿರುವ ತಪ್ಪನ್ನು ಸೂಕ್ಷ್ಮವಾಗಿ ಗಮನಿಸಿ. ತಾನೇ ರಾಜನಾಗಬೇಕೆಂಬ ಆಸೆ, ಅದರಿಂದ ದ್ವೇಷ, ಅದರಿಂದ ಅಸೂಯೆ, ಅದರಿಂದ ಮಾನಸಿಕ ಸ್ಥಿಮಿತ ತಪ್ಪುವಿಕೆ, ಅದರಿಂದ ಮಾಡಬಾರದ್ದನ್ನು ಮಾಡುವುದು. ಇದು ನಾವು ದೈನಂದಿನ ಜೀವನದಲ್ಲಿ ಕಾಣುವ ಅತಿಸಾಮಾನ್ಯ ವಿಚಾರ. ಮನುಷ್ಯ ದಾರಿತಪ್ಪುವ ವಿವಿಧ ಹಂತಗಳಿವು.

ಅತ್ರ ಶೂರಾ ಮಹೇಷ್ವಾಸಾ ಭೀಮಾರ್ಜುನಸಮಾ ಯುಧಿ |
ಯುಯುಧಾನೋ ವಿರಾಟಶ್ಚ ದ್ರುಪದಶ್ಚ ಮಹಾರಥಃ ||೪||

ಅತ್ರ ಶೂರಾಃ ಮಹಾ ಇಷು ಆಸಾಃ ಭೀಮಾರ್ಜುನ ಸಮಾಃ ಯುಧಿ |
ಯುಯುಧಾನಃ ವಿರಾಟಃ ಚ ದ್ರುಪದಃ ಚ ಮಹಾರಥಃ -- ಇಲ್ಲಿ ಎಲ್ಲರೂ ವೀರರು. ಹಿರಿಯ ಬಿಲ್ಗಾರರು. ಕಾದುವಲ್ಲಿ ಭೀಮಾರ್ಜುನರಿಗೆ ಸಾಟಿಯಾದವರು. ಸಾತ್ಯಕಿ, ವಿರಾಟ ಮತ್ತು ದ್ರುಪದ ಕೂಡಾ ಹಿರಿಯ ತೇರಾಳು.

ಪಾಂಡವರ ಸೈನ್ಯವನ್ನು ನೋಡಿ ಮಾನಸಿಕವಾಗಿ ತಳಮಳಗೊಂಡ ದುರ್ಯೋಧನ, ದ್ರೋಣಾಚಾರ್ಯರ ಬಳಿ ಹೋಗಿ, ಪಾಂಡವ ಸೇನೆಯ ಬಗ್ಗೆ, ಅಲ್ಲಿರುವ ವೀರರ ಬಗ್ಗೆ ಮಾತನಾಡುತ್ತಾನೆ. ಸಾಮಾನ್ಯವಾಗಿ ನಮಗೆ ಯಾರ

ಬಗ್ಗೆ ಭಯವಿದೆಯೋ, ಅವರೇ ಎಲ್ಲಾ ಕಡೆ ಕಂಡಂತೆ ಭಾಸವಾಗುತ್ತದೆ. ಕಂಸನಿಗೆ ಕೃಷ್ಣ ಕಾಣಿಸಿಕೊಂಡಂತೆ. ಇದು ಮನಃಶಾಸ್ತ್ರ. ಇಲ್ಲಿ ದುರ್ಯೋಧನನಿಗೆ ಭೀಮಾರ್ಜುನರ ಭಯ. ಆ ಭಯದಿಂದಲೇ ಹೇಳುತ್ತಾನೆ "ಅಲ್ಲಿರುವ ವೀರರೆಲ್ಲರೂ ಭೀಮಾರ್ಜುನರಿಗೆ ಸಮನಾದವರು. ಅಸಾಧಾರಣ ಬಿಲ್ಲನ್ನು ಹಿಡಿದು ಹೋರಾಡಿ ಗೆಲ್ಲಬಲ್ಲ ಮಹಾವೀರರು" ಎಂದು. ವಾಸ್ತವವಾಗಿ ಆಗಿನ ಕಾಲದಲ್ಲಿ ಇದ್ದ ಮಹಾಬಿಲ್ಲು ಎಂದರೆ ಗಾಂಢೀವ. ಗಾಂಢೀವ ಹಿಡಿದು ಯುದ್ಧ ಮಾಡಬಲ್ಲವರೆಂದರೆ ಅರ್ಜುನ-ಭೀಮ ಮತ್ತು ಶ್ರೀಕೃಷ್ಣ. ಈ ಸಂದರ್ಭದಲ್ಲಿ ದುರ್ಯೋಧನನಿಗೆ ಪಾಂಡವರ ಪಡೆಯಲ್ಲಿನ ಮಹಾವೀರರೆಲ್ಲರೂ ಭೀಮಾರ್ಜುನರಿಗೆ ಸಮನಾದ ಬಿಲ್ಗಾರರಾಗಿ ಕಾಣುತ್ತಾರೆ. ಇದು ದುರ್ಯೋಧನನ ಮನಃಸ್ಥಿತಿಯನ್ನು ಹೇಳುತ್ತದೆ.

ಮುಂದೆ ದುರ್ಯೋಧನ ಪಾಂಡವರ ಕಡೆಗಿನ ವೀರರ ಹೆಸರನ್ನು ಒಂದೊಂದಾಗಿ ಹೇಳಲಾರಂಭಿಸುತ್ತಾನೆ. “ಸಾತ್ಯಕಿ, ವಿರಾಟ, ದ್ರುಪದರಂತಹ ಮಹಾರಥರು ಪಾಂಡವ ಸೇನೆಯಲ್ಲಿದ್ದಾರೆ” ಎನ್ನುತ್ತಾನೆ. ಇಲ್ಲಿ ಈ ಮೂರು ಹೆಸರು ಬರಲು ವಿಶೇಷ ಕಾರಣವಿದೆ. ಈ ಮೂವರೂ ಕೂಡಾ ಕೌರವರ ಕಡೆಗೆ ಬರಬೇಕಾಗಿತ್ತು. ಜರಾಸಂಧನೊಡನಿದ್ದು, ಕೃಷ್ಣನ ವಿರುದ್ಧ ಹೋರಾಡಿದ ದ್ರುಪದನನ್ನು ಹಿಂದೆ ಪಾಂಡವರು ಬಂಧಿಸಿ, ಅವನ ಅರ್ಧರಾಜ್ಯವನ್ನು ಕಿತ್ತುಕೊಂಡು ದ್ರೋಣನಿಗೆ ಕೊಟ್ಟ ವಿಷಯ ಈ ಹಿಂದೆ ನೋಡಿದ್ದೇವೆ. ಆದರೆ ಪಾಂಡವರಿಗೆ ದ್ರೌಪದಿಯನ್ನು ಕೊಟ್ಟು ಸಂಬಂಧ ಬೆಳೆಸಿದ ದ್ರುಪದ-ಪಾಂಡವರ ಪರ ನಿಂತ. ವಿರಾಟ ಈ ಹಿಂದೆ ಕೀಚಕನಿಗೆ ಹೆದರಿಕೊಂಡು ರಾಜ್ಯಭಾರ ಮಾಡುತ್ತಿದ್ದ. ಕೀಚಕನನ್ನು ಭೀಮ ಕೊಂದಿದ್ದರಿಂದ ವಿರಾಟ ಪಾಂಡವರ ಪಾಳಯವನ್ನು ಸೇರಿಕೊಂಡ. ಇನ್ನು ಬಲರಾಮನ ಆಣತಿಯನ್ನು ಮೀರದ ಸಾತ್ಯಕಿ. ಇಲ್ಲಿ ಬಲರಾಮ ‘ಯುದ್ಧದಲ್ಲಿ ತಾನು ತಲೆ ಹಾಕುವುದಿಲ್ಲ’ ಎಂದು ತೀರ್ಥಯಾತ್ರೆಗೆ ಹೊರಟು ಹೋಗಿರುವುದರಿಂದ ಸಾತ್ಯಕಿ ಕೂಡಾ ಪಾಂಡವರ ಪರ ನಿಂತ. ಹೀಗೆ ಈ ಪ್ರತಿಯೊಂದು ಹೆಸರನ್ನು ತೆಗೆದು ಹೇಳುತ್ತಿರುವ ದುರ್ಯೋಧನನಿಗೆ ಅಂತರಂಗದಲ್ಲಿ “ಅಯ್ಯೋ ನನ್ನ ಕಡೆ ಇರಬೇಕಾದ ಈ ಮಹಾರಥರು ಪಾಂಡವರ ಪಕ್ಷದಲ್ಲಿದ್ದಾರಲ್ಲ” ಎನ್ನುವ ನೋವಿದೆ. ಇದು ದುರ್ಯೋಧನನ ವಿಷಾದ! ಆತ ತನ್ನ ಯುದ್ಧತಂತ್ರವನ್ನು ರೂಪಿಸುವುದನ್ನು ಬಿಟ್ಟು, ಇಲ್ಲಿ ತನ್ನ ಕಡೆಗೆ ಬರಬೇಕಾಗಿದ್ದವರು ಪಾಂಡವರ ಕಡೆ ಸೇರಿದ್ದಾರಲ್ಲಾ ಎಂದು ವಿಷಾದಿಸುವುದರಲ್ಲಿ ಕಾಲಹರಣ ಮಾಡುತ್ತಿದ್ದಾನೆ. ಇನ್ನೂ ಅನೇಕ ವೀರರ ಹೆಸರನ್ನು ದುರ್ಯೋಧನ ಪಟ್ಟಿ ಮಾಡುತ್ತಾನೆ.

ಧೃಷ್ಟಕೇತುಶ್ಚೇಕಿತಾನಃ ಕಾಶಿರಾಜಶ್ಚ ವೀರ್ಯವಾನ್ ।
ಪುರುಜಿತ್ ಕುಂತಿಭೋಜಶ್ಚ ಶೈಬ್ಯಶ್ಚ ನರಪುಂಗವಃ ॥೫॥

ಧೃಷ್ಟಕೇತುಃ ಚೇಕಿತಾನಃ ಕಾಶಿರಾಜಃ ಚ ವೀರ್ಯವಾನ್ ।
ಪುರುಜಿತ್ ಕುಂತಿಭೋಜಃ ಚ ಶೈಬ್ಯಃ ಚ ನರಪುಂಗವಃ -- ಧೃಷ್ಟಕೇತು, ಚೇಕಿತಾನ, ಕಾಶಿರಾಜ, ಕೂಡಾ ಕಡುಗಲಿ. ಪುರುಜಿತನು, ಕುಂತಿಭೋಜನು,ಶೈಬ್ಯ ಕೂಡಾ ಗಂಡುಗಲಿ.

ಮೇಲ್ನೋಟಕ್ಕೆ ಈ ಶ್ಲೋಕದಲ್ಲಿ ನಾವು ಆರು ಮಂದಿ ವೀರರ ಹೆಸರನ್ನು ಕಾಣುತ್ತೇವೆ. ಆದರೆ ಇಲ್ಲಿ ನಾವು ನೋಡಬೇಕಾದದ್ದು ಕೇವಲ ಈ ಆರು ವ್ಯಕ್ತಿಗಳನ್ನಲ್ಲ. ಈ ವ್ಯಕ್ತಿಗಳ ಹೆಸರನ್ನು ಹೆಕ್ಕಿ ಹೇಳುತ್ತಿರುವ ದುರ್ಯೋಧನನ ಮನಃಸ್ಥಿತಿಯನ್ನು. ಆತನ ವೇದನೆಯನ್ನು. ಇಲ್ಲಿ ಬರುವ ಒಂದೊಂದು ವ್ಯಕ್ತಿಗಳ ಹಿಂದಿರುವ

ಇತಿಹಾಸವನ್ನು ನೋಡಿದಾಗ ಮಾತ್ರ ಇದು ನಮಗೆ ಸ್ಪಷ್ಟವಾಗಿ ಅರ್ಥವಾಗುತ್ತದೆ. ಮೊದಲನೆಯದಾಗಿ ಧೃಷ್ಟಕೇತು. ಈತ ಶಿಶುಪಾಲನ ಮಗ. ಶಿಶುಪಾಲನನ್ನು ಕೃಷ್ಣ ರಾಜಸೂಯ ಯಜ್ಞದ ಕಾಲದಲ್ಲಿ ಕೊಂದಿದ್ದ. ಇಂತಹ ಶಿಶುಪಾಲನ ಮಗ ಇಂದು ಪಾಂಡವರ ಪಕ್ಷದಲ್ಲಿ! ಇದು ದುರ್ಯೋಧನನ ಸಂಕಟ. ಚೇಕಿತಾನ: ಈತ ಕೂಡಾ ಸಾತ್ಯಕಿಯಂತೆ ಒಬ್ಬ ಯಾದವ ವೀರ. ಬಲರಾಮನ ಅನುಪಸ್ಥಿತಿಯಿಂದಾಗಿ ಈತ ಪಾಂಡವರ ಪಾಳಯ ಸೇರಿದ್ದ. ಮುಂದೆ ದುರ್ಯೋಧನ ಕಾಶಿರಾಜನ ಹೆಸರನ್ನು ಹೇಳುತ್ತಾನೆ. ಇಲ್ಲಿ ಕಾಶಿರಾಜ ಎಂದಾಗ ನಮಗೆ ಇಬ್ಬರು ಕಾಶಿರಾಜರು ನೆನಪಿಗೆ ಬರುತ್ತಾರೆ. ಒಂದು ಕಡೆ ಸಂಗಮವಾಗಿರುವ ಎರಡು ನದಿಗಳು ಕಾಶಿ ನಗರವನ್ನು 'ವರಣ' ಮತ್ತು 'ಅಸಿ' ಎನ್ನುವ ಎರಡು ಭಾಗವನ್ನಾಗಿ ವಿಂಗಡಣೆ ಮಾಡಿವೆ. ಅದೇ ಇಂದಿನ ವಾರಣಾಸಿ. ಈ ಎರಡು ಭಾಗದ ರಾಜರನ್ನು ಕಾಶಿರಾಜರೆಂದು ಕರೆಯುತ್ತಾರೆ. ಒಬ್ಬ ದುರ್ಯೋಧನನಿಗೆ ಹೆಣ್ಣುಕೊಟ್ಟ ಮಾವ ಹಾಗೂ ಇನ್ನೊಬ್ಬ ಭೀಮಸೇನನಿಗೆ ಕಾಳಿಯನ್ನು ಕೊಟ್ಟು ಮದುವೆ ಮಾಡಿದವ. ಭಾಗಶಃ ಇಲ್ಲಿ ಬರುವ ಕಾಶಿರಾಜ ಭೀಮಸೇನನ ಮಾವ. ಏಕೆಂದರೆ ದುರ್ಯೋಧನನ ಮಾವ ಹಿಂದೆ ಪೌಂಡ್ರಿಕ ಯುದ್ಧದಲ್ಲಿ ಕೃಷ್ಣಚಕ್ರದಿಂದ ಹತನಾಗಿದ್ದ. ಇಲ್ಲಿ ನಾವು ಸೂಕ್ಷ್ಮವಾಗಿ ನೋಡಿದಾಗ "ಅಯ್ಯೋ ಕಾಶಿರಾಜನೂ ಕೂಡಾ ಪಾಂಡವರ ಪರವಾಗಿ ಹೋರಾಟ ಮಾಡುತ್ತಿದ್ದಾನೆ. ನನ್ನ ಮಾವನಾದ ಕಾಶಿರಾಜ ಇಂದು ನನ್ನೊಂದಿಗಿಲ್ಲವಲ್ಲ" ಎನ್ನುವ ಕಳವಳ ದುರ್ಯೋಧನನನ್ನು ಕಾಡುತ್ತಿದೆ. ಈ ಮೂವರನ್ನು ದುರ್ಯೋಧನ 'ವೀರವಾನ್' ಎಂದು ಕರೆಯುತ್ತಾನೆ. ಇಲ್ಲಿ ವೀರವಾನ್ ಎಂದರೆ ಅಪಾರವಾದ ಶಕ್ತಿ ತುಂಬಿರುವ ಕಡುಗಲಿಗಳು.

ಮುಂದೆ ದುರ್ಯೋಧನ ಪುರುಜಿತ್, ಕುಂತಿಭೋಜ ಹಾಗೂ ಶೈಬ್ಯನ ಹೆಸರನ್ನು ಹೇಳುತ್ತಾನೆ. ಇಲ್ಲಿ ಪುರುಜಿತ್ ಮತ್ತು ಕುಂತಿಭೋಜ- ಕುಂತಿದೇಶದವರು. ಮೂಲತಃ ಕುಂತಿ ಯಾದವ ವಂಶದವಳು. ವಸುದೇವನ ಸಹೋದರಿ. ಆಕೆಯ ಮೂಲ ಹೆಸರು 'ಪ್ರಥು'. ಆಕೆಯನ್ನು ಕುಂತಿ ದೇಶದ ರಾಜ ದತ್ತು ಪಡೆದಿದ್ದ. ಈ ದತ್ತು ಸಂಬಂಧದಿಂದಾಗಿ ಪುರುಜಿತ್ ಮತ್ತು ಕುಂತಿಭೋಜ ಪಾಂಡವರ ಪರ ಸೇರಿಕೊಂಡಿದ್ದಾರೆ ಎನ್ನುವುದು ದುರ್ಯೋಧನನ ಅಳಲು. ಇನ್ನು ಶೈಬ್ಯ. ಈತ ಶಿಬಿ ದೇಶದ ರಾಜ. ಈತನ ಮಗ ಕಾಡಿನಲ್ಲಿದ್ದ ದ್ರೌಪದಿಯನ್ನು ಅಪಹರಿಸಲು ಜಯದ್ರತನಿಗೆ ಸಹಾಯ ಮಾಡಿದ್ದಕ್ಕಾಗಿ ಭೀಮಸೇನನಿಂದ ಕೊಲ್ಲಲ್ಪಟ್ಟಿದ. 'ಹೀಗಿದ್ದೂ ಕೂಡಾ ಶೈಬ್ಯ ಪಾಂಡವರ ಪಕ್ಷವನ್ನು ವಹಿಸಿದ್ದಾನೆ' ಎಂದು ದುರ್ಯೋಧನ ತನ್ನ ಮನದಾಳದ ಅಳಲನ್ನು ದ್ರೋಣರಲ್ಲಿ ಪರಿತಪಿಸುತ್ತಾನೆ! ಈ ಮೂವರನ್ನು ಆತ ನರಪುಂಗವರು ಎಂದು ಸಂಬೋಧಿಸುತ್ತಾನೆ. ನರಪುಂಗವ ಎಂದರೆ ಗೂಳಿಯಂತೆ ನಡಿಗೆಯುಳ್ಳ ಗಂಡುಗಲಿ. ಅವರ ನಡಿಗೆ ಹಾಗೂ ನೋಟ ವೈರಿಯ ಎದೆ ನಡುಗಿಸಬಲ್ಲುದು.

ಇಲ್ಲಿ ಮಾನಸಿಕ ತುಮುಲಕ್ಕೊಳಪಟ್ಟ ಒಬ್ಬ ವ್ಯಕ್ತಿ , ತನ್ನ ಹಿಂದಿನ ಘಟನೆಗಳನ್ನು ಮೆಲುಕುಹಾಕಿಕೊಂಡು, ಹೇಗೆ ಆತ್ಮಸ್ಥೈರ್ಯವನ್ನು ಕಳೆದುಕೊಳ್ಳುತ್ತಾನೆ ಮತ್ತು ಅದರಿಂದಾಗಿ ಹೇಗೆ ತನ್ನ ನಿಜವಾದ ಸಾಮರ್ಥ್ಯವನ್ನು ಮರೆತು ವರ್ತಿಸುತ್ತಾನೆ ಎನ್ನುವುದನ್ನು ಸ್ಪಷ್ಟವಾಗಿ ಕಾಣುತ್ತೇವೆ. ಇಂತಹ ಸ್ಥಿತಿಯಲ್ಲಿ ಯಾರೂ ಕೂಡಾ ಜಯವನ್ನು ಕಾಣಲಾರರು.

ಯುಧಾಮನ್ಯುಶ್ಚ ವಿಕ್ರಾಂತ ಉತ್ತಮೌಜಾಶ್ಚ ವೀರ್ಯವಾನ್ ।
ಸೌಭದ್ರೋ ದ್ರೌಪದೇಯಾಶ್ಚ ಸರ್ವ ಏವ ಮಹಾರಥಾಃ ॥೬॥

ಯುಧಾಮನ್ಯುಃ ಚ ವಿಕ್ರಾಂತ ಉತ್ತಮೌಜಾಃ ಚ ವೀರ್ಯವಾನ್ ।
ಸೌಭದ್ರಃ ದ್ರೌಪದೇಯಾಃ ಚ ಸರ್ವೇ ಏವ ಮಹಾರಥಾಃ - ಯುಧಾಮನ್ಯುವು ಕೆಚ್ಚೆದೆಯವನು. ಉತ್ತಮೌಜ ಕೂಡಾ ಕಡುಗಲಿ. ಸುಭದ್ರೆಯ ಮಗ, ದ್ರೌಪದಿಯ ಮಕ್ಕಳು ಎಲ್ಲರೂ ನಿಶ್ಚಯವಾಗಿ ಹಿರಿಯ ತೇರಾಳುಗಳೇ .

ಪಾಂಡವ ಸೇನೆಯನ್ನು ಕಂಡು ಅಂತರಂಗದಲ್ಲಿ ಗಾಬರಿಗೊಂಡ ದುರ್ಯೋಧನನು, ಒಂದೇ ಮನೆಯಿಂದ ಬಂದ ಪ್ರತಿಯೊಬ್ಬ ವ್ಯಕ್ತಿಯ ಬಗ್ಗೆ ಇಲ್ಲಿ ಪ್ರಸ್ತಾಪಿಸುತ್ತಾನೆ. ಯುಧಾಮನ್ಯು ಹಾಗೂ ಉತ್ತಮೌಜ ಇವರು ದ್ರುಪದನ ಇನ್ನಿಬ್ಬರು ಮಕ್ಕಳು. ಇವರನ್ನು ದುರ್ಯೋಧನ ವೀರ ನೆಡೆಯುಳ್ಳ ವಿಕ್ರಾಂತರು ಎಂದು ಸಂಬೋಧಿಸುತ್ತಾನೆ. ಇಷ್ಟೇ ಅಲ್ಲ ಆತ ಸುಭದ್ರೆಯ ಮಗ ಅಭಿಮನ್ಯು ಹಾಗೂ ಇನ್ನೂ ಪ್ರಾಯಪ್ರಭುದ್ದರಲ್ಲದ ಸುಮಾರು ಹದಿಮೂರರಿಂದ ಹದಿನೆಂಟು ಪ್ರಾಯದ ಐದು ಮಂದಿ ದ್ರೌಪದಿಯ ಮಕ್ಕಳನ್ನು ಮಹಾರಥರು ಎಂದು ಸಂಬೋಧಿಸುತ್ತಾನೆ!

ಇಲ್ಲಿ ಸ್ಪಷ್ಟವಾಗಿ ನಾವು ಕಂಡು ಕೊಳ್ಳಬೇಕಾದ ವಿಷಯವೆಂದರೆ, ಒಮ್ಮೆ ನಾವು ಭಯಕ್ಕೊಳಪಟ್ಟರೆ ನಮಗೆ ಹಗ್ಗ ಹಾವಿನಂತೆ ಕಾಣಲಾರಂಭಿಸುತ್ತದೆ. ಇಂತಹ ಸಂಧರ್ಭದಲ್ಲಿ ನಮ್ಮಲ್ಲಿರುವ ನಿಜವಾದ ಸಾಮರ್ಥ್ಯ ಕೂಡಾ ವ್ಯರ್ಥವಾಗುತ್ತದೆ. ತನ್ನಲ್ಲಿ ಹನ್ನೊಂದು ಅಕ್ಷೋಹಿಣಿ ಸೈನ್ಯವಿದ್ದೂ ಕೂಡಾ, ಯುದ್ಧಕ್ಕೆ ಮೊದಲು ತನ್ನ ಸೈನ್ಯವನ್ನು ಹುರಿದುಂಬಿಸುವುದನ್ನು ಬಿಟ್ಟು, ದುರ್ಯೋಧನ ಪಾಂಡವ ಸೈನ್ಯದಲ್ಲಿನ ವೀರರ ಬಗ್ಗೆ ಮಾತನಾಡುತ್ತಿರುವುದು ಸ್ಪಷ್ಟವಾಗಿ ಆತನ ಮನಃಸ್ಥಿತಿಯನ್ನು ಸೂಚಿಸುತ್ತದೆ. ಆತ ಇಲ್ಲಿ ಹನ್ನೊಂದು ಮಂದಿ ವೀರರ ಹೆಸರನ್ನು ಹೇಳಿರುವುದನ್ನು ನಾವು ಗಮನಿಸಬೇಕು(ಸಾತ್ಯಕಿ, ವಿರಾಟ, ದ್ರುಪದ, ಧೃಷ್ಟಕೇತು, ಚೇಕಿತಾನ, ಕಾಶಿರಾಜ, ಪುರುಜಿತ್, ಕುಂತಿಭೋಜ,ಶೈಭ್ಯ, ಯುಧಾಮನ್ಯು ಹಾಗೂ ಉತ್ತಮೌಜ). ತನ್ನಲ್ಲಿ ಹನ್ನೊಂದು ಅಕ್ಷೋಹಿಣಿ ಸೈನ್ಯವನ್ನು ಪ್ರತಿನಿಧಿಸುವ ವೀರರಿದ್ದರೂ ಕೂಡಾ, ಆತನಿಗೆ ಏಳು ಅಕ್ಷೋಹಿಣಿ ಸೈನ್ಯವಿರುವ ಪಾಂಡವ ಸೈನ್ಯದಲ್ಲಿ ಹನ್ನೊಂದು ಮಂದಿ ವೀರರು ಎದ್ದು ಕಾಣಲಾರಂಭಿಸುತ್ತಾರೆ! ಭಗವಂತನಿಂದ ದೂರ ನಿಂತ ಅಧರ್ಮಿಯಾದ ಪ್ರತಿಯೊಬ್ಬರ ಪಾಡು ಇಷ್ಟೇ. ಅವರು ಎಂದೆಂದೂ ಅಂತರಂಗದ ಭಯದಲ್ಲೇ ಬದುಕುತ್ತಾರೆ ಹಾಗೂ ಆ ಭಯವನ್ನು ಮುಚ್ಚಿಡಲು ಇಲ್ಲ ಸಲ್ಲದ ಮಾತನ್ನಾಡುತ್ತಾರೆ. ಒಬ್ಬ ದುಷ್ಟ ಕೆಟ್ಟದಾಗಿ ಗೌರವವಿಲ್ಲದೆ ಮಾತನಾಡುತ್ತಿದ್ದಾನೆ ಎಂದರೆ ಆತ ಅಂತರಂಗದಲ್ಲಿ ತುಂಬಾ ಭಯಭೀತನಾಗಿದ್ದಾನೆ ಎಂದರ್ಥ. ಅಂತವರಲ್ಲಿ ಎಷ್ಟೇ ಶಕ್ತಿ ಇದ್ದರೂ ಕೂಡಾ ಅದು ಎಂದೂ ಅವರ ರಕ್ಷಣೆ ಮಾಡಲಾರದು. ಏಕೆಂದರೆ ಅವರಿಗೆ ತಮ್ಮ ಶಕ್ತಿಯ ಬಗ್ಗೆ ಆತ್ಮವಿಶ್ವಾಸವಿರುವುದಿಲ್ಲ. ಇದು ಇಲ್ಲಿ ನಾವು ಕಂಡುಕೊಳ್ಳಬೇಕಾದ ಮನಃಶಾಸ್ತ್ರ.

ಅಸ್ಮಾಕಂ ತು ವಿಶಿಷ್ಟಾ ಯೇ ತಾನ್ ನಿಬೋಧ ದ್ವಿಜೋತ್ತಮ ।
ನಾಯಕಾ ಮಮ ಸೈನ್ಯಸ್ಯ ಸಂಜ್ಞಾರ್ಥಂ ತಾನ್ ಬ್ರವೀಮಿ ತೇ ॥೭॥

ಅಸ್ಮಾಕಮ್ ತು ವಿಶಿಷ್ಟಾಃ ಯೇ ತಾನ್ ನಿಬೋಧ ದ್ವಿಜೋತ್ತಮ ।
ನಾಯಕಾಃ ಮಮ ಸೈನ್ಯಸ್ಯ ಸಂಜ್ಞಾ ಅರ್ಥಮ್ ತಾನ್ ಬ್ರವೀಮಿ ತೇ -- ಓ ದ್ವಿಜೋತ್ತಮಾ, ನಮ್ಮ ಕಡೆಯ ಹೆಚ್ಚಾಳುಗಳು, ನನ್ನ ಪಡೆಯ ಮುಂದಾಳುಗಳು ಯಾರಿದ್ದಾರೆ. ಅವರ ಬಗೆಗೆ ಕೇಳು. ನಿನ್ನ ಸನ್ನೆಗೆಂದು ಅವರನ್ನು ಹೆಸರಿಸುತ್ತಿದ್ದೇನೆ.

ಒಬ್ಬ ವೀರನಾದವನು ತನ್ನ ಶಕ್ತಿ-ಸಾಮರ್ಥ್ಯ ಕಡಿಮೆ ಇದ್ದರೂ ಕೂಡಾ ಯುದ್ಧಕಾಲದಲ್ಲಿ ಯುಕ್ತಿಯಿಂದ ಕಾರ್ಯ ನಿರ್ವಹಿಸುತ್ತಾನೆ. ಮುಂದಾಳುವಾದವನು ತನ್ನ ಸೈನ್ಯವನ್ನು, ತನ್ನ ಹಿಂಬಾಲಕರನ್ನು ಹುರಿದುಂಬಿಸುತ್ತಾನೆ. ತಾವು ಶತ್ರು ಸೈನ್ಯಕ್ಕಿಂತ ಶಕ್ತರು ಎನ್ನುವ ಆತ್ಮವಿಶ್ವಾಸವನ್ನು ತನ್ನ ಸೈನ್ಯದಲ್ಲಿ ತುಂಬುತ್ತಾನೆ. ಆದರೆ ಇಲ್ಲಿ ದುರ್ಯೋಧನ ತನ್ನ ಸೇನಾಧಿಪತಿ ಭೀಷ್ಮರಲ್ಲಿ ಪರಾಮರ್ಷೆ ಮಾಡುವುದನ್ನು ಬಿಟ್ಟು, ಆಚಾರ್ಯ ದ್ರೋಣರಲ್ಲಿ ಶತ್ರು ಸೈನ್ಯದ ವೀರರ ಬಗ್ಗೆ ವಿಶಿಷ್ಟವಾಗಿ ಮಾತನಾಡಿ, 'ನಿಮ್ಮ ಸನ್ನೆಗೆಂದು ನಮ್ಮ ಸೈನ್ಯದ ಮುಂದಾಳುಗಳ ಬಗ್ಗೆ ಹೇಳುತ್ತೇನೆ' ಎನ್ನುತ್ತಾನೆ!

**ಭವಾನ್ ಭೀಷ್ಮಶ್ಚ ಕರ್ಣಶ್ಚ ಕೃಪಶ್ಚ ಸಮಿತಿಂಜಯಃ ।**
**ಅಶ್ವತ್ಥಾಮಾ ವಿಕರ್ಣಶ್ಚ ಸೌಮದತ್ತಿಸ್ತಥೈವ ಚ ॥೮॥**

ಭವಾನ್ ಭೀಷ್ಮಃ ಚ ಕರ್ಣಃ ಚ ಕೃಪಃ ಚ ಸಮಿತಿಂಜಯಃ ।
ಅಶ್ವತ್ಥಾಮಾ ವಿಕರ್ಣಃ ಚ ಸೌಮದತ್ತಿಃ ತಥಾ ಏವ ಚ -- ಪೂಜ್ಯನಾದ ನೀನು, ಭೀಷ್ಮ ಮತ್ತು ಕರ್ಣ, ಕೃಪ ಕೂಡಾ ಗೆಲುಗಾರ. ಅಶ್ವತ್ಥಾಮಾ ಮತ್ತು ವಿಕರ್ಣ; ಸೋಮದತ್ತನ ಮಗ ಭೂರಿಶ್ರವ ಕೂಡಾ.

ಪಾಂಡವ ಸೇನೆಯಲ್ಲಿ-ಸೇನಾಧಿಪತಿ, ಹನ್ನೊಂದು ಮಂದಿ ಮಹಾ ವೀರರು ಹಾಗೂ ಪಾಂಡವರ ಆರು ಮಂದಿ ಮಕ್ಕಳ ವೀರತ್ವವನ್ನು ವಿವರಿಸಿದ ದುರ್ಯೋಧನನಿಗೆ, ತನ್ನ ಕಡೆಯಲ್ಲಿರುವ ವೀರರು ಕಾಣಿಸುವುದೇ ಇಲ್ಲ! ಇಲ್ಲಿ ಆತ ಕುಹಕವಾಗಿ ತನ್ನ ಕಡೆಯ ಏಳು ಮಂದಿ ವೀರರ ಹೆಸರನ್ನು ಹೇಳುತ್ತಾನೆ. 'ಭವಾನ್' ಅಂದರೆ ತಾವು(ಪಾಂಡವರ ಆಚಾರ್ಯರು ಎನ್ನುವಂತೆ !); ಯುದ್ಧಕ್ಕೆ ಮೊದಲು ಧರ್ಮರಾಯನಿಗೆ ಜಯವಾಗಲಿ ಎಂದು ಆಶೀರ್ವಾದ ಮಾಡಿದ ಭೀಷ್ಮಾಚಾರ್ಯ! ; 'ಭೀಷ್ಮ ಯುದ್ಧಭೂಮಿಯಲ್ಲಿ ಇರುವ ತನಕ ತಾನು ಹೋರಾಟ ಮಾಡುವುದಿಲ್ಲ' ಎಂದು ಶಪತಮಾಡಿ ಕುಳಿತ ಕರ್ಣ; ವೇದ ಪಾರಾಂಗತ ಆಚಾರ್ಯ ಕೃಪಾ; ವಿಕ್ಷಿಪ್ತ ಮನಸ್ಸಿನ ಅಶ್ವತ್ಥಾಮ; ದ್ರೌಪದಿಯ ಮಾನಭಂಗವನ್ನು ಖಂಡಿಸಿ ಅದರಿಂದ ಲಾಭ ಪಡೆಯಲೆತ್ನಿಸಿದ ವಿಕರ್ಣ; ದಾಕ್ಷಿಣ್ಯಕ್ಕಾಗಿ ಬಂದ ಭೀಷ್ಮಾಚಾರ್ಯರ ತಂದೆ-ಶಂತನುವಿನ ಅಣ್ಣನ ಮಗ-ಸೋಮದತ್ತನ ಮಗ ಭೂರಿಶ್ರವ! ಈ ರೀತಿ ತನ್ನ ಕಡೆಯ ಏಳು ಮಂದಿ ವೀರರ ಹೆಸರನ್ನು ಕುಹಕವಾಗಿ ದುರ್ಯೋಧನ ಭೀಷ್ಮಾಚಾರ್ಯರಿಗೆ ಕೇಳಿಸುವಂತೆ ದ್ರೋಣಾಚಾರ್ಯರಲ್ಲಿ ಹೇಳುತ್ತಾನೆ.

ಇಲ್ಲಿ ನಾವು ವಿವರವಾಗಿ ನೋಡಿದರೆ ಕೌರವನ ಕಡೆಯಲ್ಲಿ ಹನ್ನೊಂದು ಅಕ್ಷೋಹಿಣಿ ಸೈನ್ಯವನ್ನು ಮುನ್ನೆಡೆಸಬಲ್ಲ ವೀರರಿದ್ದರು. ಆತನ ತೊಂಬತ್ತೊಂಬತ್ತು ಮಂದಿ ತಮ್ಮಂದಿರರಿದ್ದರು. ಶಲ್ಯ ಭಗದತ್ತರಂತಹ ವೀರಾಧಿವೀರರು ದುರ್ಯೋಧನನ ಕಡೆಗಿದ್ದರು. ಆದರೆ ಪಾಂಡವರ ಸೈನ್ಯವನ್ನು ನೋಡಿ ಭಯಗೊಂಡು, ಇದನ್ನೆಲ್ಲವನ್ನು ಮರೆತ ದುರ್ಯೋಧನ, ತನ್ನ ಕಡೆ ಇರುವ ಮಹಾವೀರರ ಬಗೆಗೆ ಕೇವಲವಾಗಿ ಮಾತನಾಡುತ್ತಾನೆ! ಇಲ್ಲಿ ಮಾನಸಿಕವಾಗಿ ದುರ್ಯೋಧನ ಎಷ್ಟೊಂದು ವಿಚಲಿತನಾಗಿದ್ದ ಎನ್ನುವುದು ನಮಗೆ ಸ್ಪಷ್ಟವಾಗಿ ಕಾಣುತ್ತದೆ. ಯುದ್ಧ ಪರಿಣಾಮದ ಬಗ್ಗೆ ಯೋಚಿಸುತ್ತಾ, ಆತ ತನ್ನ ಕರ್ತವ್ಯವನ್ನೇ ಮರೆತಿದ್ದ!

ಅನ್ಯೇ ಚ ಬಹವಃ ಶೂರಾ ಮದರ್ಥೇ ತ್ಯಕ್ತಜೀವಿತಾಃ ।
ನಾನಾಶಸ್ತ್ರಪ್ರಹರಣಾಃ ಸರ್ವೇ ಯುದ್ಧವಿಶಾರದಾಃ ॥೯॥

ಅನ್ಯೇ ಚ ಬಹವಃ ಶೂರಾಃ ಮತ್ ಅರ್ಥೇ ತ್ಯಕ್ತ ಜೀವಿತಾಃ ।
ನಾನಾ ಶಸ್ತ್ರ ಪ್ರಹರಣಾಃ ಸರ್ವೇ ಯುದ್ಧ ವಿಶಾರದಾಃ -- 'ಇನ್ನೂ ಬಹಳ ಮಂದಿ ವೀರರಿದ್ದಾರೆ. ನನಗಾಗಿ ಬದುಕು ತೆರಲು ಬಂದವರು. ಬಗೆಬಗೆಯ ಆಯುಧಗಳಿಂದ ಹೋರಾಡಬಲ್ಲವರು. ಎಲ್ಲರೂ ಕಾಳಗದಲ್ಲಿ ಪಳಗಿದವರು.

ಮೇಲ್ನೋಟಕ್ಕೆ ಈ ಶ್ಲೋಕವನ್ನು ನೋಡಿದರೆ ನಮಗೆ ದುರ್ಯೋಧನ ತನ್ನ ಕಡೆಯ ವೀರರ ಬಗ್ಗೆ ಹೇಳುತ್ತಿರುವಂತೆ ಕಂಡರೂ ಕೂಡಾ, ಇಲ್ಲಿ ಆತ ಹೇಳುತ್ತಿರುವ ವಿಷಯವೇ ಬೇರೆ. ಆತ ಈ ಮಾತನ್ನು ದ್ರೋಣರಲ್ಲಿ ಹೇಳುತ್ತಿದ್ದಾನೆ, ಹಾಗೂ ಆತ ತನ್ನ ಮಾತನ್ನು ಆರಂಭಿಸಿದ್ದು "ಪಾಂಡವರ ಆಚಾರ್ಯರೇ" ಎಂದು. ಇಲ್ಲಿ ಆತ- ನಮ್ಮ ಕಡೆ ಅನೇಕ ಶೂರರಿದ್ದಾರೆ, 'ಎಲ್ಲರೂ ತಮ್ಮ ಪ್ರಾಣ ಕೊಡಲು ಬಂದವರು' ಎಂದು ಕುಹಕದಿಂದ ಹೇಳುತ್ತಿದ್ದಾನೆ. ಅವರೆಲ್ಲರೂ ವಿವಿಧ ಶಸ್ತ್ರಗಳನ್ನು ಪ್ರಯೋಗಿಸಬಲ್ಲರು ಎನ್ನುವ ದುರ್ಯೋಧನ, ತನ್ನ ಪಾಲಿಗೆ ಯಾರೂ ಇಲ್ಲ ಎನ್ನುವ ಭಾವನೆಯನ್ನು ವ್ಯಕ್ತಪಡಿಸುತ್ತಾನೆ.

ಅಪರ್ಯಾಪ್ತಂ ತದಸ್ಮಾಕಂ ಬಲಂ ಭೀಷ್ಮಾಭಿರಕ್ಷಿತಮ್ ।
ಪರ್ಯಾಪ್ತಂ ತ್ವಿದಮೇತೇಷಾಂ ಬಲಂ ಭೀಮಾಭಿರಕ್ಷಿತಮ್ ॥೧೦॥

ಅಪರ್ಯಾಪ್ತಮ್ ತತ್ ಅಸ್ಮಾಕಮ್ ಬಲಮ್ ಭೀಷ್ಮ ಅಭಿರಕ್ಷಿತಮ್ ।
ಪರ್ಯಾಪ್ತಮ್ ತು ಇದಮ್ ಏತೇಷಾಮ್ ಬಲಮ್ ಭೀಮ ಅಭಿರಕ್ಷಿತಮ್ -- ಭೀಷ್ಮಾಚಾರ್ಯರ ಕಣ್ಗಾಪಿನ ಆ ನಮ್ಮ ಸೇನೆಯ ಸಜ್ಜು ಸಾಲದು. ಭೀಮನ ಕಣ್ಗಾಪಿನ ಇವರ ಈ ಸೇನೆಯೋ ಸಾಕಷ್ಟು ಸಿದ್ಧಗೊಂಡಿದೆ.

ಇಲ್ಲಿ ದುರ್ಯೋಧನನ ಮಾತಿನ ಪರ್ಯಾವಸಾನ(Conclusion)ವಿದೆ. ಆತ ಹೇಳುತ್ತಾನೆ: "ಆ ನಮ್ಮ ಸೈನ್ಯವಿದೆಯಲ್ಲ, ಪಾಂಡವ ಪಕ್ಷಪಾತಿ ಭೀಷ್ಮಾಚಾರ್ಯರ ಮುಂದಾಳತ್ವದಲ್ಲಿನ ಆ ನಮ್ಮ ಸೈನ್ಯ, ಅದು ಭೀಮನ ಕಣ್ಗಾಪಿನ ಈ ಸೈನ್ಯದ ಮುಂದೆ ಸಜ್ಜಾಗಿರುವುದು ಸಾಲದು" ಎಂದು. ಇಲ್ಲಿ ಸೂಕ್ಷ್ಮವಾಗಿ ನೋಡಿದರೆ ಭೀಷ್ಮಾಚಾರ್ಯರು ಕೌರವ ಸೇನಾಧಿಪತಿ. ಆದರೆ ಭೀಮ ಪಾಂಡವ ಸೇನಾಧಿಪತಿ ಅಲ್ಲ. ದುರ್ಯೋಧನನಿಗೆ ಭೀಮನ ಮೇಲೆ ದ್ವೇಷವಿದೆ ಹಾಗೂ ಭಯವಿದೆ. ಆ ಕಾರಣದಿಂದ ಆತ ಭೀಮನ ಕಣ್ಗಾಪಿನ ಪಾಂಡವ ಸೇನೆ ಎಂದು ಸಂಬೋಧಿಸುತ್ತಾನೆ. ಇನ್ನೂ ಸೂಕ್ಷ್ಮವಾಗಿ ನೋಡಿದರೆ- ದುರ್ಯೋಧನ ಯುದ್ಧ ಭೂಮಿಯಲ್ಲಿ ತನ್ನ ಸೇನೆಯ ಮುಂಚೂಣಿಯಲ್ಲಿ ನಿಂತಿದ್ದಾನೆ. ಪಾಂಡವ ಸೇನೆ ಆತನಿಂದ ದೂರದಲ್ಲಿದೆ. ಆದರೆ ಮಾತನಾಡುವಾಗ ಆತ "ಈ ಪಾಂಡವ ಸೇನೆ" ಹಾಗೂ "ಆ ನಮ್ಮ ಸೇನೆ" ಎಂದು ಸಂಬೋಧಿಸುತ್ತಾನೆ. ಪಾಂಡವ ಸೇನೆ ಈಗಾಗಲೇ ತನ್ನ ಹತ್ತಿರ ಬಂದು ನಿಂತಿದೆ ಹಾಗೂ ತನ್ನ ಸೇನೆ ತನ್ನಿಂದ ಬಲು ದೂರದಲ್ಲಿದೆ ಎನ್ನುವಂತೆ ಆತ ಮಾತನಾಡುತ್ತಿದ್ದಾನೆ.

ಅಯನೇಷು ಚ ಸರ್ವೇಷು ಯಥಾಭಾಗಮವಸ್ಥಿತಾಃ ।
ಭೀಷ್ಮಮೇವಾಭಿರಕ್ಷಂತು ಭವಂತಃ ಸರ್ವ ಏವ ಹಿ ॥೧೧॥

ಅಯನೇಷು ಚ ಸರ್ವೇಷು ಯಥಾ ಭಾಗಮ್ ಅವಸ್ಥಿತಾಃ ।
ಭೀಷ್ಮಮ್ ಏವ ಅಭಿರಕ್ಷಂತು ಭವಂತಃ ಸರ್ವೇ ಏವ ಹಿ -- ಆಯಕಟ್ಟಿನ ಎಲ್ಲೆಡೆಗಳಲ್ಲೂ ತಕ್ಕಂತೆ ಹಂಚಿಕೊಂಡು, ಕಾವಲು ನಿಂತು-ನೀವೆಲ್ಲರೂ ಭೀಷ್ಮನನ್ನೇ ಕಾಯುತ್ತಿರಬೇಕು.

"ಆಯಕಟ್ಟಿನ ಎಲ್ಲೆಡೆಗಳಲ್ಲೂ ತಕ್ಕಂತೆ ಹಂಚಿಕೊಂಡು ಕಾವಲು ನಿಂತು ನೀವೆಲ್ಲರೂ ಭೀಷ್ಮರನ್ನು ಕಾಯುತ್ತಿರಬೇಕು" ಎಂದು ದುರ್ಯೋಧನ ದ್ರೋಣರನ್ನುದ್ದೇಶಿಸಿ ಮಾತನಾಡುತ್ತಾನೆ. ಇಲ್ಲಿ "ಸ್ವಲ್ಪ ನಮ್ಮ ಮುದುಕ ಸೇನಾಧಿಪತಿ ಭೀಷ್ಮಾಚಾರ್ಯರನ್ನು ನೋಡಿಕೊಳ್ಳಿ" ಎನ್ನುವಂತಿದೆ ಆತನ ಮಾತು. ಆತನಿಗೆ ತನ್ನ ಸೇನಾಧಿಪತಿಯ ಮೇಲೇ ನಂಬಿಕೆ ಇಲ್ಲ!
ಈ ಮಾತನ್ನು ಕೇಳಿ ಭೀಷ್ಮಾಚಾರ್ಯರಿಗೆ ಅದೆಷ್ಟು ನೋವಾಗಿರಬೇಕು. ತನ್ನ ಆತ್ಮಸಾಕ್ಷಿಗೆ ವಿರುದ್ಧವಾಗಿ, ತಾನು ಹುಟ್ಟಿಬಂದ ಮನೆತನದ ರಾಜಾಜ್ಞೆಗೆ ಬದ್ಧನಾಗಿ, ತನ್ನ ಅಂತರಂಗದ ಇಚ್ಛೆಗೆ ವಿರುದ್ಧವಾಗಿ, ತಾನು ಪ್ರೀತಿಸಿದ ತನ್ನ ಮಮ್ಮಕ್ಕಳ ವಿರುದ್ಧ ಹೋರಾಟಕ್ಕೆ ಪ್ರಾಮಾಣಿಕವಾಗಿ ನಿಂತಾಗ, ಭರವಸೆ ಕಳೆದುಕೊಂಡು ಮಾತನಾಡುತ್ತಿರುವ ದುರ್ಯೋಧನನ ಕುಹಕ ನುಡಿ ಅವರಿಗೆ ಎಷ್ಟೊಂದು ನೋವನ್ನುಂಟುಮಾಡಿರಬಹುದು. ಇದನ್ನು ನಾವು ಊಹಿಸುವುದೂ ಕಷ್ಟ. ಈ ಮಾತನ್ನು ಕೇಳಿಸಿಕೊಂಡ ಭೀಷ್ಮಾಚಾರ್ಯರು ಏನು ಮಾಡಿದರು ಎನ್ನುವುದನ್ನು ಮುಂದಿನ ಶ್ಲೋಕದಲ್ಲಿ ನೋಡೋಣ.

ತಸ್ಯ ಸಂಜನಯನ್ ಹರ್ಷಂ ಕುರುವೃದ್ಧಃ ಪಿತಾಮಹಃ ।
ಸಿಂಹನಾದಂ ವಿನದ್ಯೋಚ್ಚೈಃ ಶಂಖಂ ದಧ್ಮೌ ಪ್ರತಾಪವಾನ್ ॥೧೨॥

ತಸ್ಯ ಸಂಜನಯನ್ ಹರ್ಷಮ್ ಕುರುವೃದ್ಧಃ ಪಿತಾಮಹಃ ।
ಸಿಂಹನಾದಮ್ ವಿನದ್ಯ ಉಚ್ಚೈಃ ಶಂಖಮ್ ದಧ್ಮೌ ಪ್ರತಾಪವಾನ್ -- ಅವನಿಗೆ ಸಂತಸಬರಿಸಲೆಂದು ಕುರುಗಳ ಹಿರಿಯಜ್ಜನಾದ ಆ ಎದೆಗಾರ ಭೀಷ್ಮ, ಗಟ್ಟಿಯಾದ ಸಿಂಹನಾದ ಗೈದು ಶಂಖವನ್ನು ಊದಿದರು.

ಯುದ್ಧ ಪೂರ್ವದಲ್ಲಿ ಭರವಸೆಯನ್ನು ಕಳೆದುಕೊಂಡು ವಿಷಾದದಿಂದ ಮಾತನಾಡುತ್ತಿರುವ ದುರ್ಯೋಧನನ ಭರವಸೆ ಹೆಚ್ಚಿಸಲು, ಆತನಿಗೆ ಆತ್ಮ ವಿಶ್ವಾಸವನ್ನು ತುಂಬಲು, ಕುರುವಂಶದ ಅತ್ಯಂತ ಹಿರಿಯ ಪ್ರತಾಪಶಾಲಿ ವಯೋವೃದ್ಧ ಭೀಷ್ಮಾಚಾರ್ಯರು ಸಿಂಹನಾದಗೈದು, ತನ್ನ ಕರ್ತವ್ಯಕ್ಕೆ ತಕ್ಕಂತೆ ಶಂಖವನ್ನೂದಿದರು.
ಶಂಖ ಬಹಳ ದೊಡ್ಡ ದುಷ್ಟ ಸಂಹಾರಕ ಶಕ್ತಿ. ಹಿಂದಿನ ಕಾಲದಲ್ಲಿ ಬೆಳಿಗ್ಗೆ ಮತ್ತು ಸಂಜೆ ತಪ್ಪದೇ ಮನೆಯ ಮೂಲೆ-ಮೂಲೆಯಿಂದ ಅಷ್ಟ ದಿಕ್ಕುಗಳಿಗೂ ಕೇಳುವಂತೆ ಶಂಖನಾದ ಮಾಡುತ್ತಿದ್ದರು. ಇದಕ್ಕೆ ಕಾರಣ ಶಂಖ ನಾದದಲ್ಲಿರುವ ದುಷ್ಟಶಕ್ತಿಯ ಎದೆಯೊಡೆಯುವ ಸಾಮರ್ಥ್ಯ. ಶಂಖದ ನಾದ ಎಲ್ಲಿಯವರೆಗೆ ಕೇಳಿಸುತ್ತದೋ, ಅಲ್ಲಿಯ ತನಕ ಯಾವ ದುಷ್ಟ ಶಕ್ತಿಗಳೂ ಸುಳಿಯಲಾರವು. ಮೃತ್ಯುವಿನ ತಾಂಡವವಾದ ರಣರಂಗದಲ್ಲಿ ಆಸುರೀ ಶಕ್ತಿಯ ಪ್ರಭಾವ ಇರಬಾರದು ಎನ್ನುವುದಕ್ಕಾಗಿ, ಯುದ್ಧಕ್ಕೆ ತಮ್ಮವರನ್ನು ಸಿದ್ಧಗೊಳಿಸುವುದಕ್ಕಾಗಿ ಮತ್ತು

ಶತ್ರುಗಳಿಗೆ ತಾವು ಸಿದ್ಧ ಎನ್ನುವ ಸಂಕೇತ ಕೊಡಲು ಹಿಂದೆ ಶಂಖವನ್ನು ಬಳಸುತ್ತಿದ್ದರು. ಇಲ್ಲಿ ಭೀಷ್ಮಾಚಾರ್ಯರು ಶಂಖನಾದದಿಂದ ತಮ್ಮ ಸಿದ್ದತೆಯ ಸಂಕೇತವನ್ನು ಕೌರವ ಸೈನ್ಯಕ್ಕೂ ಹಾಗೂ ಪಾಂಡವ ಸೈನ್ಯಕ್ಕೂ ರವಾನಿಸಿದ್ದಾರೆ.

ತತಃ ಶಂಖಾಶ್ಚ ಭೇರ್ಯಶ್ಚ ಪಣವಾನಕಗೋಮುಖಾಃ ।
ಸಹಸೈವಾಭ್ಯಹನ್ಯಂತ ಸ ಶಬ್ದಸ್ತುಮುಲೋऽಭವತ್ ॥೧೩॥

ತತಃ ಶಂಖಾಃ ಚ ಭೇರ್ಯಃ ಚ ಪಣವ ಅನಕ ಗೋಮುಖಾಃ ।
ಸಹಸಾ ಏವ ಅಭ್ಯಹನ್ಯಂತ ಸಃ ಶಬ್ದಃ ತುಮುಲಃ ಅಭವತ್ -- ಆ ಬಳಿಕ ಶಂಖಗಳು, ನಗಾರಿಗಳು, ತಮಟೆ - ಡೋಲು- ಗೋಮುಖಗಳು (ಕಹಳೆ) ಒಮ್ಮೆಲೇ ಬಾರಿಸಲ್ಪಟ್ಟವು. ಆ ಸದ್ದು ಕಿವಿಗಡಚಿಕ್ಕುವ ಗದ್ದಲವಾಯಿತು.

ಪ್ರಧಾನ ಸೇನಾಧಿಪತಿಯಾದ ಭೀಷ್ಮಾಚಾರ್ಯರು ಶಂಖನಾದ ಮಾಡಿದ ಬಳಿಕ, ಕೌರವ ಸೈನ್ಯದಿಂದ ಶಂಖಗಳು, ನಗಾರಿ-ಡೋಲು-ಗೋಮುಖಗಳು-ಒಮ್ಮೆಲೇ ಬಾರಿಸಲ್ಪಟ್ಟವು. ಆ ಸದ್ದು ಕಿವಿಗಡಚಿಕ್ಕುವ ಗದ್ದಲವಾಯಿತು. ಇಲ್ಲಿ ದುರ್ಯೋಧನಾಗಲೀ ಆತನ ತಮ್ಮಂದಿರರಾಗಲೀ ಶಂಖನಾದ ಮಾಡಲಿಲ್ಲ. ಬದಲಾಗಿ ಸೇನಾಧಿಪತಿಯಿಂದ ಶಂಖ ನಾದವಾಯಿತು. ಅದರ ಹಿಂದೆ ಸೈನ್ಯದ ಮುಖಂಡರಿಂದ ಮತ್ತು ಸೈನಿಕರಿಂದ ಶಂಖನಾದವಾಯಿತು. ಈ ರೀತಿ ವ್ಯವಸ್ಥಿತ ರೀತಿಯಲ್ಲಿಲ್ಲದ ನಾದ ಗದ್ದಲದಂತೆ ಭಾಸವಾಗುತ್ತಿತ್ತು. ಇಲ್ಲಿ ದುರ್ಯೋಧನ ತನ್ನಲ್ಲಿರುವ ಶಕ್ತಿಯನ್ನು ವ್ಯವಸ್ಥಿತವಾಗಿ ರೂಪಿಸಿರಲಿಲ್ಲ ಎನ್ನುವುದು ಸ್ಪಷ್ಟವಾಗಿ ಎದ್ದು ಕಾಣುತ್ತದೆ. ನಮ್ಮಲ್ಲಿ ಎಷ್ಟೇ ಯುಕ್ತಿ ಸಾಧನವಿರಲಿ(**Resource**), ಎಲ್ಲಿಯ ತನಕ ನಮಗೆ ಆ ಸಾಧನವನ್ನು ನಿಯಮಬದ್ಧವಾಗಿ ಉಪಯೋಗಿಸಿಕೊಳ್ಳಲು ಬರುವುದಿಲ್ಲವೋ, ಅಲ್ಲಿಯ ತನಕ ಆ ಸಾಧನ ಇದ್ದೂ ವ್ಯರ್ಥ. ಸಾಧನವನ್ನು ಕೈಯಲ್ಲಿಟ್ಟುಕೊಂಡು ಅಧಿಕಾರದ ಆಸೆಯಿಂದ ಮನಃಸ್ಥಿತಿ ಕಳೆದುಕೊಳ್ಳುವ ಮುಂದಾಳು(**Leader**) ಎಂದೂ ಯಶವನ್ನು ಕಾಣಲಾರ.

ತತಃ ಶ್ವೇತೈರ್ಹಯೈರ್ಯುಕ್ತೇ ಮಹತಿ ಸ್ಯಂದನೇ ಸ್ಥಿತೌ ।
ಮಾಧವಃ ಪಾಂಡವಶ್ಚೈವ ದಿವ್ಯೌ ಶಂಖೌ ಪ್ರದಧ್ಮತುಃ ॥೧೪॥

ತತಃ ಶ್ವೇತೈಃ ಹಯೈಃ ಯುಕ್ತೇ ಮಹತಿ ಸ್ಯಂದನೇ ಸ್ಥಿತೌ ।
ಮಾಧವಃ ಪಾಂಡವಃ ಚ ಏವ ದಿವ್ಯೌ ಶಂಖೌ ಪ್ರದಧ್ಮತುಃ -- ಆ ಬಳಿಕ ಬಿಳಿಯ ಕುದುರೆಗಳಿಂದ ಸಜ್ಜುಗೊಂಡ ಹಿರಿಯ ರಥದಲ್ಲಿ ಕುಳಿತ ಶ್ರೀಕೃಷ್ಣ ಮತ್ತು ಅರ್ಜುನ ವೆಗ್ಗಳದ ಶಂಖಗಳನ್ನು ಊದಿದರು.

ಕೌರವ ಸೇನೆಯ ಶಂಖ ನಗಾರಿ ಗದ್ದಲದ ನಂತರ ನಾಲ್ಕು ಬಿಳಿ ಕುದುರೆಗಳಿಂದ ಸಜ್ಜುಗೊಂಡ, ಅಲ್ಲಿ ಇರುವ ರಥಗಳಲ್ಲೇ ಅತಿ ದೊಡ್ಡ ರಥದಲ್ಲಿ ಕುಳಿತ ಶ್ರೀಕೃಷ್ಣ ಮತ್ತು ಅರ್ಜುನರು, ತಮ್ಮ ದಿವ್ಯ ಶಂಖನಾದವನ್ನು ಮಾಡುತ್ತಾರೆ.(ಮೊದಲು ಶ್ರೀಕೃಷ್ಣ ಆ ನಂತರ ಅರ್ಜುನ).

ಈ ಶ್ಲೋಕದಲ್ಲಿ ಮಾಧವ ಮತ್ತು ಪಾಂಡವ ಎನ್ನುವ ಎರಡು ವಿಶೇಷಣ ಬಳಕೆಯಾಗಿದೆ. ಇಲ್ಲಿ ಭಗವಂತನನ್ನು ಮಾಧವಃ ಎಂದು ಸಂಬೋಧಿಸಿದ್ದಾರೆ. 'ಮಾ' ಅಂದರೆ ಮಾತೆ ಲಕ್ಷ್ಮಿ. ಆದ್ದರಿಂದ ಮಾಧವ ಅಂದರೆ ಲಕ್ಷ್ಮೀಪತಿ ಭಗವಂತ-ಶ್ರೀಮನ್ನಾರಾಯಣ . ಇನ್ನು 'ಮಾ' ಅಂದರೆ ಜ್ಞಾನ ಕೂಡಾ ಹೌದು. ಭಗವಂತ ಜ್ಞಾನದ ಒಡೆಯ. ಆದ್ದರಿಂದ ಆತ ಮಾಧವ. ಶ್ರೀಕೃಷ್ಣ-ಅವತಾರದಲ್ಲಿ ಮಧುವಂಶದಲ್ಲಿ ಹುಟ್ಟಿ ಬಂದದ್ದರಿಂದ ಆತನನ್ನು ಮಾಧವ ಎಂದು ಕರೆಯುತ್ತಾರೆ. ವೇದದಲ್ಲಿ ಮಾತೃ ಎನ್ನುವ ಪದವನ್ನು ಮಾತು ಅಥವಾ ವಾಙ್ಮಯ ಎನ್ನುವ ಅರ್ಥದಲ್ಲಿ ಉಪಯೋಗಿಸಿದ್ದಾರೆ. ಏಳು ಮಹಾನ್ ಗ್ರಂಥಗಳಾದ ಋಗ್ವೇದ, ಯಜುರ್ವೇದ, ಸಾಮವೇದ, ಅಥರ್ವವೇದ, ರಾಮಾಯಣ, ಮಹಾಭಾರತ ಹಾಗೂ ಪುರಾಣಗಳನ್ನು ಮಾತೃ ಎನ್ನುತ್ತಾರೆ.ಆದ್ದರಿಂದ ಸಮಸ್ತ ವೈದಿಕ ವಾಙ್ಮಯ ಪ್ರತಿಪಾದನಾದ ಭಗವಂತ ಮಾಧವ.

ಇಲ್ಲಿ ಅರ್ಜುನನನ್ನು 'ಪಾಂಡವ' ಎಂದು ಸಂಬೋಧಿಸಿದ್ದಾರೆ. ಅರ್ಜುನ ಕುಂತಿಯ ಮೂರು ಮಂದಿ ಮಕ್ಕಳಲ್ಲಿ ಕೊನೆಯವನು. ಸಾಮಾನ್ಯವಾಗಿ ಯಾವಾಗಲೂ ಕೊನೆಯ ಮಗನ ಮೇಲೆ ಪ್ರೀತಿ ಹೆಚ್ಚು. ಅದಕ್ಕಾಗಿ ಆತನನ್ನು ಪಾರ್ಥ, ಕೌಂತೇಯ, ಪಾಂಡವ ಎಂದು ಕರೆಯುತ್ತಿದ್ದರು. ಅರ್ಜುನನಲ್ಲಿ ಭಗವಂತನ ವಿಶೇಷ ಸನ್ನಿಧಾನವಿತ್ತು. ಆತ ನಾರಾಯಣನ ಜೊತೆಗಾರನಾದ 'ನರನ' ರೂಪ ಕೂಡಾ ಹೌದು.

ನಮ್ಮ ದೇಹ ಕೂಡಾ ಒಂದು ರಥ. ಅಂತಹ ರಥದಲ್ಲಿ ಜೀವನನ್ನು ನಡೆಸುವ ಭಗವಂತನ ಸನ್ನಿಧಾನವಿದೆ. ನಾಲ್ಕು ಕುದುರೆಗಳೆಂದರೆ ನಾಲ್ಕು ವೇದಗಳು. ಬಿಳಿ ಬಣ್ಣ ಸತ್ವಗುಣದ ಸಂಕೇತ

ಪಾಂಚಜನ್ಯಂ ಹೃಷೀಕೇಶೋ ದೇವದತ್ತಂ ಧನಂಜಯಃ ।
ಪೌಂಡ್ರಂ ದಧ್ಮೌ ಮಹಾಶಂಖಂ ಭೀಮಕರ್ಮಾ ವೃಕೋದರಃ ॥೧೫॥

ಪಾಂಚಜನ್ಯಮ್ ಹೃಷೀಕೇಶಃ ದೇವದತ್ತಮ್ ಧನಂಜಯಃ ।
ಪೌಂಡ್ರಮ್ ದಧ್ಮೌ ಮಹಾಶಂಖಮ್ ಭೀಮಕರ್ಮಾ ವೃಕೋದರಃ -- ಶ್ರೀಕೃಷ್ಣನು ಪಾಂಚಜನ್ಯವನ್ನು, ಅರ್ಜುನನು ದೇವದತ್ತವನ್ನು, ಪೌಂಡ್ರ ಎನ್ನುವ ಮಹಾ ಶಂಖವನ್ನು ಭೀಮನು ಊದಿದನು.

ಪಾಂಡವರ ಕಡೆಯಿಂದ ಮೊತ್ತಮೊದಲಿಗೆ ಶ್ರೀಕೃಷ್ಣ ತನ್ನ ಶಂಖವನ್ನು ಮೊಳಗಿಸುತ್ತಾನೆ. ಶ್ರೀಕೃಷ್ಣನ ಶಂಖದ ಹೆಸರು ಪಾಂಚಜನ್ಯ. ಈ 'ಪಾಂಚಜನ್ಯ' ಶಂಖದ ಹಿಂದೆ ಒಂದು ಕಥೆಯಿದೆ. ಶ್ರೀಕೃಷ್ಣ ತನ್ನ ವಿದ್ಯಾಭ್ಯಾಸವನ್ನು ಮಾಡಿದ್ದು ಸಾಂದೀಪನಿ ಮುನಿಯ ಆಶ್ರಮದಲ್ಲಿ. ವಿದ್ಯಾಭ್ಯಾಸ ಮುಗಿಸಿ ಹಿಂತಿರುಗುವ ಸಮಯದಲ್ಲಿ ಶಿಷ್ಯರು ಗುರುದಕ್ಷಿಣೆ ಕೊಡುವುದು ಸಾಮಾನ್ಯ. ಇಲ್ಲಿ ಕೃಷ್ಣ ತನ್ನ ಗುರುವಿಗೆ ಕೊಟ್ಟ ಗುರುದಕ್ಷಿಣೆ ಬಹಳ ವಿಶಿಷ್ಟವಾದುದು. 'ಪಾಂಚಜನ' ಎನ್ನುವ ಅಸುರ ಸಾಂದೀಪನಿ ಮುನಿಯ ಪುತ್ರನನ್ನು ಕೊಂದಿದ್ದ. ತನ್ನ ವಿದ್ಯಾಭ್ಯಾಸ ಮುಗಿದು ಹಿಂದಿರುಗುವ ಸಮಯದಲ್ಲಿ ಕೃಷ್ಣ ಗುರುದಂಪತಿಗಳಿಗೆ ಗುರುದಕ್ಷಿಣೆಯಾಗಿ ಅವರ ಪುತ್ರನನ್ನೇ ಮರಳಿಸಿದ. ಆ ಪಾಂಚಜನ ಎನ್ನುವ ರಾಕ್ಷಸನಿದ್ದ ಶಂಖವೇ ಪಾಂಚಜನ್ಯ. ಪಾಂಚಜನ್ಯ-ಅಸುರ ಸಂಹಾರಕ ಹಾಗೂ ಜ್ಞಾನಾನಂದದ ಸಂಕೇತ.

ಕೃಷ್ಣನ ಶಂಖನಾದದ ಬೆನ್ನಿಗೇ ಅರ್ಜುನ ತನ್ನ 'ದೇವದತ್ತ' ಎನ್ನುವ ಶಂಖವನ್ನೂದಿದ. ವಾನಪ್ರಸ್ಥ ಕಾಲದಲ್ಲಿ ಅಸುರರ ವಿರುದ್ಧ ಹೊರಾಡಿದ್ದಕ್ಕಾಗಿ ಅರ್ಜುನನಿಗೆ ಇಂದ್ರ ದೇವಲೋಕದಲ್ಲಿ ವಿಶಿಷ್ಟವಾದ ಕಿರೀಟವನ್ನು ತೊಡಿಸಿ ಈ ಶಂಖವನ್ನು ಉಡುಗೊರೆಯಾಗಿ ಕೊಟ್ಟಿದ್ದ. ಈ ಶಂಖವೂ ಕೂಡಾ ದುಷ್ಟನಿಗ್ರಹದ ಸಂಕೇತ.
ಅರ್ಜುನನ ಶಂಖನಾದದ ನಂತರ ವೃಕೋದರನಾದ ಭೀಮನು ಪೌಂಡ್ರ ಎನ್ನುವ ಮಹಾಶಂಖವನ್ನು ಊದಿದನು. ಇಲ್ಲಿ ಭೀಮನನ್ನು ವೃಕೋದರ ಎಂದು ಸಂಬೋಧಿಸಿದ್ದಾರೆ. ವೃಕೋದರ ಎಂದರೆ ಇಡೀ ವಿಶ್ವವನ್ನು ಸುಡಬಲ್ಲ ಅಗ್ನಿಯನ್ನು ಉದರದಲ್ಲಿ ಧರಿಸಿದವನು ಎಂದರ್ಥ. ಭೀಮ ಎಂತಹ ಪರಾಕ್ರಮಶಾಲಿ ಎನ್ನುವುದನ್ನು ಇಲ್ಲಿ ಈ ರೀತಿ ವ್ಯಕ್ತಪಡಿಸಿದ್ದಾರೆ.
ಈ ಶ್ಲೋಕದಲ್ಲಿ ಶ್ರೀಕೃಷ್ಣನನ್ನು ಹೃಷೀಕೇಶ ಎಂದು ಸಂಬೋಧಿಸಿದ್ದಾರೆ. ಹೃಷೀಕೇಶ ಎಂದರೆ ಹೃಷೀಕಗಳಿಗೆ ಈಶ. ಇಲ್ಲಿ ಹೃಷೀಕ ಎಂದರೆ ಇಂದ್ರಿಯಗಳು. ಆತ ಇಂದ್ರಿಯಗಳ ಸ್ವಾಮಿ. ನಮಗೆ ಪ್ರತಿಯೊಂದು ಇಂದ್ರಿಯಗಳನ್ನು ದಯಪಾಲಿಸಿ , ಅದರಲ್ಲಿ ನಿಂತು ನೆಡೆಸುವವನು ಹೃಷೀಕಗಳ ಈಶನಾದ ಹೃಷೀಕೇಶ. ಕೇಶ ಅನ್ನುವ ಶಬ್ದಕ್ಕೆ ಸೂರ್ಯಕಿರಣ ಎನ್ನುವ ಅರ್ಥವಿದೆ. ಸೂರ್ಯನ ಕಿರಣದಲ್ಲಿ ಏಳು ಬಣ್ಣವಿದೆ. ಈ ಏಳು ವರ್ಣದಲ್ಲಿ ತುಂಬಿ ಬದುಕಿಗೆ ಹರ್ಷವನ್ನು ಕೊಡತಕ್ಕಂತಹ ಭಗವಂತ ಹೃಷೀಕೇಶಃ

ಅನಂತವಿಜಯಂ ರಾಜಾ ಕುಂತೀಪುತ್ರೋ ಯುಧಿಷ್ಠಿರಃ ।
ನಕುಲಃ ಸಹದೇವಶ್ಚ ಸುಘೋಷಮಣಿಪುಷ್ಪಕೌ ॥೧೬॥

ಅನಂತವಿಜಯಮ್ ರಾಜಾ ಕುಂತೀಪುತ್ರಃ ಯುಧಿಷ್ಠಿರಃ ।
ನಕುಲಃ ಸಹದೇವಃ ಚ ಸುಘೋಷ ಮಣಿಪುಷ್ಪಕೌ -- ಕುಂತೀಪುತ್ರನಾದ ರಾಜ ಯುಧಿಷ್ಠಿರ ಅನಂತವಿಜಯವನ್ನು, ನಕುಲ ಸಹದೇವರು ಸುಘೋಷ ಮತ್ತು ಮಣಿಪುಷ್ಪವೆಂಬ ಶಂಖವನ್ನೂದಿದರು

ಭೀಮನ ನಂತರ ಕುಂತಿಯ ಹಿರಿಮಗ, ದೊರೆ ಯುಧಿಷ್ಠಿರ- ಧರ್ಮ ಮತ್ತು ವಿಜಯದ ಸಂಕೇತವಾದ 'ಅನಂತವಿಜಯ' ಎನ್ನುವ ಶಂಖವನ್ನು ಊದಿದನು. ನಕುಲ ಹಾಗೂ ಸಹದೇವರು ಸುಘೋಷ ಮತ್ತು ಮಣಿಪುಷ್ಪವೆಂಬ ಶಂಖವನ್ನು ಕ್ರಮಬದ್ಧವಾಗಿ ಮೊಳಗಿಸಿದರು.
ಮಹಾಭಾರತದಲ್ಲಿ ಬೇರೆ ಯಾವ ರಾಜರ ಶಂಖದ ಹೆಸರಿನ ಬಗ್ಗೆ ಎಲ್ಲಿಯೂ ಉಲ್ಲೇಖವಿಲ್ಲ. ಪಾಂಡವರ ಐದು ಶಂಖಗಳ ಹೆಸರನ್ನು ಭಗವದ್ಗೀತೆಯಲ್ಲಿ ಮಾತ್ರ ಕಾಣಬಹುದು. ಪ್ರಾಯಶಃ ಇದು ನಮಗೆ ನಿತ್ಯ ಸ್ಮರಣೀಯವಾಗಿರಬೇಕು ಎನ್ನುವ ಉದ್ದೇಶದಿಂದ ಗೀತೆಯಲ್ಲಿ ಈ ಐದು ಹೆಸರನ್ನು ವಿಶೇಷವಾಗಿ ಉಲ್ಲೇಖಿಸಿರಬಹುದು.

ಕಾಶ್ಯಶ್ಚ ಪರಮೇಷ್ವಾಸಃ ಶಿಖಂಡೀ ಚ ಮಹಾರಥಃ ।
ಧೃಷ್ಟದ್ಯುಮ್ನೋ ವಿರಾಟಶ್ಚ ಸಾತ್ಯಕಿಶ್ಚಾಪರಾಜಿತಃ ॥೧೭॥

ಕಾಶ್ಯಃ ಚ ಪರಮ ಇಷು ಆಸಃ ಶಿಖಂಡೀ ಚ ಮಹಾರಥಃ ।
ಧೃಷ್ಟದ್ಯುಮ್ನಃ ವಿರಾಟಃ ಚ ಸಾತ್ಯಕಿಃ ಚ ಅಪರಾಜಿತಃ -- ಹಿರಿಯ ಬಿಲ್ಲೋಜ ಕಾಶಿರಾಜ, ಹಿರಿಯ ತೇರಾಳು

ಶಿಖಂಡಿ ಸೇರಿದಂತೆ, ಧೃಷ್ಟದ್ಯುಮ್ನ ಮತ್ತು ವಿರಾಟ, ಸೋಲರಿಯದ ಸಾತ್ಯಕಿಯೊಂದಿಗೆ ಶಂಖನಾದ ಮಾಡಿದರು.

ತದನಂತರ ಹಿರಿಯ ಬಿಲ್ಲೋಜ ಕಾಶಿರಾಜ, ಹಿರಿಯ ತೇರಾಳು ಶಿಖಂಡಿ, ಧೃಷ್ಟದ್ಯುಮ್ನ ಮತ್ತು ವಿರಾಟ, ಸೋಲರಿಯದ ಸಾತ್ಯಕಿ, ಹೀಗೆ ಒಬ್ಬೊಬ್ಬರಾಗಿ ಶಂಖ ನಾದವನ್ನು ಮಾಡಿದರು.
ಇಲ್ಲಿ ಶಿಖಂಡಿಯನ್ನು ಮಹಾರಥ ಎಂದು ಸಂಬೋಧಿಸಿರುವುದನ್ನು ನಾವು ಗಮನಿಸಬೇಕು. ಬಹಳಷ್ಟು ಜನ ಶಿಖಂಡಿ ಎಂದರೆ ನಪುಂಸಕ ಎಂದು ತಿಳಿದಿರುತ್ತಾರೆ. ಆದರೆ ಶಿಖಂಡಿ ಎಂದರೆ ನಪುಂಸಕ ಅಲ್ಲ. ಶಿಖಂಡಿ ಎಂದರೆ ಮೂಲಭೂತವಾಗಿ ಶಿಖಂಡ(ಶಿಖ+ಅಂಡ )ಉಳ್ಳವನು. ಇಲ್ಲಿ ಶಿಖ ಎಂದರೆ ತಲೆಗೂದಲು. ತಲೆ ಕೂದಲನ್ನು ಚೆನ್ನಾಗಿ ಬಾಚಿ ಹಿಂದೆ ಮೊಟ್ಟೆಯಂತೆ ಕಟ್ಟುವವರು ಶಿಖಂಡಿಗಳು. ಮಹಾಭಾರತದ ಈ ಶಿಖಂಡಿ ಹುಟ್ಟಿದಾಗ ಹೆಣ್ಣಾಗಿದ್ದು , ಆ ಬಳಿಕ ಗಂಡಾದ ಮಹಾರಥ. ಈತ 'ಸ್ತ್ರೀಪೂರ್ವವಾದ್ದರಿಂದ' ಭೀಷ್ಮಾಚಾರ್ಯರು ಆತನ ವಿರುದ್ಧ ಬಾಣ ಪ್ರಯೋಗ ಮಾಡಿರಲಿಲ್ಲ.

ದ್ರುಪದೋ ದ್ರೌಪದೇಯಾಶ್ಚ ಸರ್ವಶಃ ಪೃಥಿವೀಪತೇ ।
ಸೌಭದ್ರಶ್ಚ ಮಹಾಬಾಹುಃ ಶಂಖಾನ್ ದಧ್ಮುಃ ಪೃಥಕ್ ಪೃಥಕ್ ॥೧೮॥

ದ್ರುಪದಃ ದ್ರೌಪದೇಯಾಃ ಚ ಸರ್ವಶಃ ಪೃಥಿವೀಪತೇ ।
ಸೌಭದ್ರಃ ಚ ಮಹಾಬಾಹುಃ ಶಂಖಾನ್ ದಧ್ಮುಃ ಪೃಥಕ್ ಪೃಥಕ್ -- ಓ ನೆಲದೊಡೆಯನೇ; ದ್ರುಪದ, ದ್ರೌಪದಿಯ ಮಕ್ಕಳು ಸೇರಿದಂತೆ, ತುಂಬುತೋಳಿನ ಮಹಾಪರಾಕ್ರಮಿ ಅಭಿಮನ್ಯು. ಹೀಗೆ ಎಲ್ಲರೂ, ಒಬ್ಬೊಬ್ಬರಾಗಿ ಶಂಖವನ್ನೂದಿದರು.

ಇಲ್ಲಿ ಸೂಕ್ಷ್ಮವಾಗಿ ನೋಡಿದಾಗ ಪಾಂಡವರ ಕಡೆ ಇದ್ದ ಶಿಸ್ತು(Discipline) ಎದ್ದು ಕಾಣುತ್ತದೆ. ಕೌರವರ ಪಾಳಯದಿಂದ ಗದ್ದಲರೂಪದ ಶಂಖ ನಗಾರಿಗಳ ಸದ್ದಿಗೆ ಉತ್ತರವಾಗಿ ಪಾಂಡವರು ಶಿಸ್ತುಬದ್ಧವಾಗಿ, ಕ್ರಮಬದ್ಧವಾಗಿ ಶಂಖನಾದ ಮಾಡುತ್ತಾರೆ. ಮನಃಶಾಸ್ತ್ರೀಯವಾಗಿ ನೋಡಿದಾಗ, ಶಿಸ್ತುಬದ್ಧವಾದ ಚಿಕ್ಕ ಸೇನೆ ಅಶಿಸ್ತಿನಿಂದ ಕೂಡಿದ ಬಹುದೊಡ್ಡ ಸೇನೆಯ ಎದೆಯನ್ನು ಹೇಗೆ ನಡುಗಿಸಬಲ್ಲದು ಎನ್ನುವುದನ್ನು ಇಲ್ಲಿ ನಾವು ಕಂಡುಕೊಳ್ಳಬಹುದು. ಭಗವಂತನಿಗೆ ಸರ್ವಸಮರ್ಪಣೆ ಭಾವದಲ್ಲಿ, ಯಾವುದೇ ಅಹಂಕಾರವಿಲ್ಲದೆ, ಭಗವಂತನ ಸಾರಥ್ಯದಲ್ಲಿ, ಧರ್ಮಯುದ್ಧಕ್ಕೆ ಸಿದ್ಧವಾದ ಪಾಂಡವ ಸೇನೆ-ಮಾನಸಿಕವಾಗಿ ಸಂಪೂರ್ಣ ಸಿದ್ಧವಾಗಿತ್ತು. ಅಹಂಕಾರದ ಅಮಲಿನಲ್ಲಿ, ಅಧಿಕಾರದ ಆಸೆಯಿಂದ, ಮಾನಸಿಕ ಸ್ಥಿಮಿತ ಕಳೆದುಕೊಂಡು, ಭಗವಂತನ ವಿರುದ್ಧ ನಿಂತ ದುರ್ಯೋಧನನ ಮುಂದಾಳತ್ವದಲ್ಲಿನ ಕೌರವಸೇನೆ- ಈಗಾಗಲೇ ಆತ್ಮವಿಶ್ವಾಸವನ್ನು ಕಳೆದುಕೊಂಡಿತ್ತು.
ಇಲ್ಲಿ ಕಾಣುವ ಇನ್ನೊಂದು ವಿಶೇಷತೆ ಎಂದರೆ- ಪಾಂಡವರ ಕಡೆಯಿಂದ ಕ್ರಮಬದ್ಧವಾಗಿ ಹದಿನೆಂಟು ಮಂದಿ ಶಂಖನಾದ ಮಾಡಿದ್ದಾರೆ. ಸಂಖ್ಯಾಶಾಸ್ತ್ರವನ್ನು ನೋಡಿದಾಗ, ಅಕ್ಷರಾಂಕದ ಪದ್ಧತಿಯಲ್ಲಿ ಹದಿನೆಂಟು ಎಂದರೆ ಜಯ. ಜ=8 ಯ=1. ಅಕ್ಷರಾಂಕದಲ್ಲಿ ಮೊದಲನೆಯದು ಏಕ ಸ್ಥಾನ, ಎರಡನೇಯದು ದಶಕ ಸ್ಥಾನ. ಆದ್ದರಿಂದ ಜ-

ಯ ಎಂದರೆ ಎಂಬತ್ತೊಂದು ಅಲ್ಲ- ಹದಿನೆಂಟು. ಜಯದ ಸಂಕೇತವಾದ 'ಹದಿನೆಂಟು ಶಂಖನಾದ' ಪಾಂಡವರ ಪಾಳಯದಲ್ಲಿ ಮೊಳಗಿತು ಎನ್ನುವಲ್ಲಿಗೆ ಭಗವದ್ಗೀತೆಯ ಹದಿನೆಂಟನೇ ಶ್ಲೋಕ ಮುಗಿಯಿತು!

ಸ ಘೋಷೋ ಧಾರ್ತರಾಷ್ಟ್ರಾಣಾಂ ಹೃದಯಾನಿ ವ್ಯದಾರಯತ್ ।
ನಭಶ್ಚ ಪೃಥಿವೀಂ ಚೈವ ತುಮುಲೋ ವ್ಯನುನಾದಯನ್ ॥೧೯॥

ಸ ಘೋಷಃ ಧಾರ್ತರಾಷ್ಟ್ರಾಣಾಮ್ ಹೃದಯಾನಿ ವ್ಯದಾರಯತ್ ।
ನಭಃ ಚ ಪೃಥಿವೀಮ್ ಚ ಏವ ತುಮುಲಃ ವ್ಯನುನಾದಯನ್ -- ಆ ಸದ್ದು ನೆಲ-ಮುಗಿಲು ತಬ್ಬಿ, ಪಡಿನುಡಿದು ಅಬ್ಬರಿಸಿ, ಧಾರ್ತರಾಷ್ಟ್ರನೆಂದು ಹೆಸರಾದ ನಿನ್ನ ಮಕ್ಕಳ ಎದೆಗಳಿಗಬ್ಬರಿಸಿತು.

ಇಲ್ಲಿ ಸಂಜಯನು ಧೃತರಾಷ್ಟ್ರನ ಮಕ್ಕಳನ್ನು 'ಧಾರ್ತರಾಷ್ಟ್ರಾಣಾಂ' ಎಂದು ಸಂಬೋಧಿಸುತ್ತಾನೆ. ಏಕೆಂದರೆ ಇದು ಅವರ ಉಪನಾಮ(**Surname**). ಈ ಹಿಂದೆ "ನನ್ನ ಮಕ್ಕಳು ಮತ್ತು ಪಾಂಡವರು" ಎಂದು ಸಂಬೋಧಿಸಿದ್ದ ಧೃತರಾಷ್ಟ್ರನಿಗೆ ಸಂಜಯನ ಕುಹಕದ ಉತ್ತರವಿದು.
ಸಂಜಯ ಹೇಳುತ್ತಾನೆ: "ಪಾಂಡವರ ಕಡೆಯಿಂದ ಕ್ರಮಬದ್ಧವಾಗಿ ಮೊಳಗಿದ ಶಂಖನಾದ, ನೆಲಮುಗಿಲನ್ನು ತುಂಬಿ, ಪಡಿನುಡಿದು ಅಬ್ಬರಿಸಿ, ಧಾರ್ತರಾಷ್ಟ್ರನೆಂದು ಹೆಸರಾದ ನಿನ್ನ ಮಕ್ಕಳ ಎದೆಯನ್ನು ಸೀಳಿತು" ಎಂದು. ಈ ಹಿಂದೆ ಹೇಳಿದಂತೆ ಪಾಂಡವರ ಶಿಸ್ತುಬದ್ಧ ನಡೆ ಈಗಾಗಲೇ ಕೌರವರ ಎದೆಯನ್ನು ಭೇದಿಸಿತ್ತು. ಯುದ್ಧ ಪ್ರಾರಂಭವಾಗುವ ಮೊದಲೇ ಪಾಂಡವರು ಕೌರವರನ್ನು ಮಾನಸಿಕವಾಗಿ ಸೋಲಿಸಿದ್ದರು.

ಅಥ ವ್ಯವಸ್ಥಿತಾನ್ ದೃಷ್ಟ್ವಾ ಧಾರ್ತರಾಷ್ಟ್ರಾನ್ ಕಪಿಧ್ವಜಃ ।
ಪ್ರವೃತ್ತೇ ಶಸ್ತ್ರಸಂಪಾತೇ ಧನುರುದ್ಯಮ್ಯ ಪಾಂಡವಃ ॥೨೦॥

ಹೃಷೀಕೇಶಂ ತದಾ ವಾಕ್ಯಮಿದಮಾಹ ಮಹೀಪತೇ ।

ಅಥ ವ್ಯವಸ್ಥಿತಾನ್ ದೃಷ್ಟ್ವಾ ಧಾರ್ತರಾಷ್ಟ್ರಾನ್ ಕಪಿಧ್ವಜಃ ।
ಪ್ರವೃತ್ತೇ ಶಸ್ತ್ರಸಂಪಾತೇ ಧನುಃ ಉದ್ಯಮ್ಯ ಪಾಂಡವಃ ॥
ಹೃಷೀಕೇಶಮ್ ತದಾ ವಾಕ್ಯಮ್ ಇದಮ್ ಆಹ ಮಹೀಪತೇ -- ಓ ದೊರೆಯೇ, ಹನುಮನ ಧ್ವಜದ ಅರ್ಜುನ ಧಾರ್ತರಾಷ್ಟ್ರರು ಸಜ್ಜಾದದ್ದನ್ನು ಕಂಡು, ಹೋರಾಟಕ್ಕೆ ತೊಡಗಲು ತನ್ನ ಬಿಲ್ಲನ್ನು ಅಣಿಗೊಳಿಸಿ, ಕೃಷ್ಣನನ್ನು ಕುರಿತು ಈ ಮಾತನ್ನು ಹೇಳಿದನು.
ಎರಡೂ ಕಡೆ ಶಂಖನಾದವಾದಾಗ ಯುದ್ಧ ಪ್ರಾರಂಭವಾಗುತ್ತದೆ. ಈ ಸಂದರ್ಭದಲ್ಲಿ, ತನ್ನ ರಥದಲ್ಲಿ ಆಂಜನೇಯನ ವಿಶೇಷ ಸನ್ನಿಧಾನವುಳ್ಳ ಅರ್ಜುನನು, ಇಂದ್ರಿಯಗಳ ಒಡೆಯನಾದ ಶ್ರೀಕೃಷ್ಣ(ಹೃಷೀಕೇಶ)ನನ್ನು ಕುರಿತು ಮಾತನ್ನಾಡುತ್ತಾನೆ.
ಇಲ್ಲಿ ಅರ್ಜುನನ ರಥದಲ್ಲಿ ಪ್ರಾಣದೇವರ ವಿಶೇಷ ಸನ್ನಿಧಾನವಿತ್ತು. ನಮ್ಮ ದೇಹವೆಂಬ ರಥದಲ್ಲಿ ಕೂಡಾ ಜೀವನನ್ನು ಸದಾ ಪ್ರಾಣ 'ಭಗವಂತನ ಸನ್ನಿಧಾನದಲ್ಲಿ' ರಕ್ಷಿಸುತ್ತಿರುತ್ತಾನೆ. ಎಲ್ಲಿ ಪ್ರಾಣನೋ ಅಲ್ಲಿ ಭಗವಂತನ

ಸನ್ನಿಧಾನ. ಪೌರಾಣಿಕವಾಗಿ ಅರ್ಜುನನ ರಥದಲ್ಲಿ ಆಂಜನೇಯನ ಸನ್ನಿಧಾನವಿರಲು ಕಾರಣ ವಾಯುದೇವರ ಇನ್ನೊಂದು ರೂಪವಾದ ಭೀಮಸೇನ. ಸೌಗಂಧಿಕಾ ಪುಷ್ಪ ತರಲು ಹೊರಟ ಭೀಮಸೇನನನ್ನು ಹನುಮಂತ ಬಾಲದಿಂದ ತಡೆದ. ಈ ಸಂದರ್ಭದಲ್ಲಿ ನಡೆದ ಘಟನೆಯಲ್ಲಿ ಆಂಜನೇಯ ತಾನು ವಿಶೇಷವಾಗಿ ಅರ್ಜುನನ ರಥದಲ್ಲಿ ಸನ್ನಿಹಿತನಾಗಿರುತ್ತೇನೆ ಎಂದು ಭೀಮಸೇನನಿಗೆ ಮಾತು ಕೊಡುತ್ತಾನೆ. ಇಲ್ಲಿ ಭೀಮಸೇನ ಹಾಗೂ ಆಂಜನೇಯ ಎನ್ನುವುದು ಪ್ರಾಣದೇವರ ಎರಡು ರೂಪ (ರಾಮ ಮತ್ತು ಪರಶುರಾಮ ಇದ್ದಂತೆ).

ತನ್ನ ಧ್ವಜದಲ್ಲಿ ಆಂಜನೇಯನ ಸನ್ನಿಧಾನ, ಕೈಯಲ್ಲಿ ಗಾಂಡೀವ, ರಥದ ಸಾರಥಿ ಕೃಷ್ಣ, ಜೊತೆಯಲ್ಲಿ ಮಹಾ ಪರಾಕ್ರಮಿ ಭೀಮಸೇನ. ಈ ರೀತಿ ಯುದ್ಧಕ್ಕೆ ಸಜ್ಜಾದ ಅರ್ಜುನನನ್ನು ಅಹಂಕಾರ(**Ego**) ಕಾಡುತ್ತದೆ. ಈ ಅಹಂಕಾರದಿಂದ ಆತ ಕೃಷ್ಣನನ್ನು ಕುರಿತು ಹೀಗೆ ಹೇಳುತ್ತಾನೆ:

ಅರ್ಜುನ ಉವಾಚ ।

ಸೇನಯೋರುಭಯೋರ್ಮಧ್ಯೇ ರಥಂ ಸ್ಥಾಪಯ ಮೇsಚ್ಯುತ ॥೨೧॥

ಅರ್ಜುನಃ ಉವಾಚ- ಅರ್ಜುನನು ನುಡಿದನು

ಸೇನಯೋಃ ಉಭಯೋಃ ಮಧ್ಯೇ ರಥಮ್ ಸ್ಥಾಪಯ ಮೇ ಅಚ್ಯುತ -- 'ಅಳಿವಿರದ ಕೃಷ್ಣನೇ' ಎರಡು ಪಡೆಗಳ ನಡುವೆ ನನ್ನ ರಥವನ್ನು ನಿಲ್ಲಿಸು.

ಈ ಶ್ಲೋಕದಲ್ಲಿ ನಾವು ಸೂಕ್ಷ್ಮವಾಗಿ ಅರ್ಜುನನ ಅಹಂಕಾರದ ಧ್ವನಿಯನ್ನು ಗಮನಿಸಬೇಕು. 'ಮೇ' ಅಂದರೆ 'ನನ್ನ'. ಅರ್ಜುನನ ರಥದ ಸಾರಥ್ಯವನ್ನು ಸ್ವಯಂ ಶ್ರೀಕೃಷ್ಣ ವಹಿಸಿದ್ದರೂ ಕೂಡಾ, ಇಲ್ಲಿ ಅಹಂಕಾರದಲ್ಲಿ ಆತ ಕೃಷ್ಣನನ್ನು ಸಾಮಾನ್ಯ ಸಾರಥಿಯಂತೆ ಮಾತನಾಡಿಸಿ, "ನನ್ನ ರಥವನ್ನು ಎರಡೂ ಸೈನ್ಯಗಳ ಮಧ್ಯದಲ್ಲಿ ನಿಲ್ಲಿಸು ಎಂದು ಆಜ್ಞೆ ಮಾಡುವ ಧ್ವನಿಯಲ್ಲಿ ಹೇಳುತ್ತಾನೆ.

ಇಲ್ಲಿ ಅರ್ಜುನ ಶ್ರೀಕೃಷ್ಣನನ್ನು ಅಚ್ಯುತ ಎಂದು ಸಂಬೋಧಿಸಿದ್ದಾನೆ. ಅಚ್ಯುತ ಎಂದರೆ ಸ್ವಯಂ ಚ್ಯುತಿ ಇಲ್ಲದ, ಭಕ್ತರ ಚ್ಯುತಿಯನ್ನು ಹರಣ ಮಾಡುವ ಭಗವಂತ. ಬಾಹ್ಯವಾಗಿ ಅಹಂಕಾರ ತೋರಿದರೂ ಕೂಡಾ, ಅರ್ಜುನನ ಅಂತರಾತ್ಮ ಮಾತ್ರ ಎಚ್ಚರದಿಂದಿತ್ತು, ಆ ಅಂತರಾತ್ಮ ಆತನ ಬಾಯಲ್ಲಿ ಈ ನಾಮವನ್ನು ನುಡಿಸಿದೆ. ಅಹಂಕಾರ ಎಂತಹ ಮಹಾತ್ಮರನ್ನೂ ಬಿಟ್ಟಿಲ್ಲ. ಒಮ್ಮೆ ನಮ್ಮ ಕೈಯಲ್ಲಿ ಬಲವಿದೆ ಎಂದು ತಿಳಿದಾಗ ನಾವು ಎಲ್ಲವನ್ನೂ ಮರೆತು ಅಹಂಕಾರದ ದಾಸರಾಗುತ್ತೇವೆ. ಈ ಅಹಂಕಾರ ನಮ್ಮನ್ನು ಅಧೋಗತಿಗೆ ತಳ್ಳುತ್ತದೆ. ಅರ್ಜುನ ಮಹಾಜ್ಞಾನಿ ಮತ್ತು ಶ್ರೀಕೃಷ್ಣನ ಭಕ್ತ. ತನ್ನ ಭಕ್ತ ಅಹಂಕಾರಕ್ಕೊಳಪಟ್ಟಾಗ, ಶ್ರೀಕೃಷ್ಣ ಯಾವ ರೀತಿ ಪ್ರತಿಕ್ರಿಯೆ ತೋರುತ್ತಾನೆ ಎನ್ನುವುದನ್ನು ಮುಂದಿನ ಶ್ಲೋಕಗಳಲ್ಲಿ ನೋಡೋಣ.

ಯಾವದೇತಾನ್ ನಿರೀಕ್ಷೇsಹಂ ಯೋದ್ಧುಕಾಮಾನವಸ್ಥಿತಾನ್ ।

ಕೈರ್ಮಯಾ ಸಹ ಯೋದ್ಧವ್ಯಮಸ್ಮಿನ್ ರಣಸಮುದ್ಯಮೇ ॥೨೨॥

ಯಾವತ್ ಏತಾನ್ ನಿರೀಕ್ಷೇ ಅಹಮ್ ಯೋದ್ಧುಕಾಮಾನ್ ಅವಸ್ಥಿತಾನ್ ।

ಕೈಃ ಮಯಾ ಸಹ ಯೋದ್ಧವ್ಯಮ್ ಅಸ್ಮಿನ್ ರಣ ಸಮುದ್ಯಮೇ -- ಕಾದ ಬಯಸಿ ನೆರೆದ ಇವರತ್ತ ನಾನೊಮ್ಮೆ

ಕಣ್ಣು ಹಾಯಿಸುತ್ತೇನೆ. ಈ ಕದನದ ಕಾಯಕದಲ್ಲಿ ಯಾರು ನನ್ನ ಜೊತೆ ಹಾಗೂ ಯಾರ ಜೊತೆ ನಾನು ಕಾದಬೇಕು ಎಂದು?

ಮಹಾಭಾರತ ಯುದ್ಧ ಇತಿಹಾಸದಲ್ಲಿ ದಾಖಲೆಯಾದ ಮೊದಲ ಜಾಗತಿಕ ಯುದ್ಧ. ಇಂತಹ ಯುದ್ಧದ ಮಂಚೂಣಿಯಲ್ಲಿ ನಿಂತ ಅರ್ಜುನ ಅಹಂಕಾರದಿಂದ ಮಾತನಾಡುತ್ತಿದ್ದಾನೆ. ಆತ ಶ್ರೀಕೃಷ್ಣನಲ್ಲಿ "ಇಲ್ಲಿ ನೆರೆದ ಇವರತ್ತ ನಾನೊಮ್ಮೆ ಕಣ್ಣು ಹಾಯಿಸಬೇಕು. ನನ್ನ ವಿರುದ್ಧ ಯುದ್ಧ ಮಾಡಲು ಬಂದವರು ಯಾರು, ಹಾಗೂ ನನ್ನ ಕಡೆಯಿಂದ ನನ್ನ ಸಹ ಯುದ್ಧ ಮಾಡಲು ಬಂದವರು ಯಾರು ಎಂದು ನಾನೊಮ್ಮೆ ನೋಡಬೇಕು" ಎನ್ನುತ್ತಾನೆ. ಇಲ್ಲಿ "ನನ್ನೊಂದಿಗೆ ಯುದ್ಧ ಮಾಡಲು ಬಂದವರನ್ನೊಮ್ಮೆ ನೋಡಬೇಕು" ಎನ್ನುವಲ್ಲಿ ಅಹಂಕಾರಭರಿತ ವ್ಯಂಗ್ಯವಿದೆ. ತಾನು ಮಹಾವೀರ, ತನ್ನೆದುರು ನೆರೆದ ಈ ಸೇನೆ ನನಗೆ ಏನೂ ಅಲ್ಲ ಎನ್ನುವ ಸೊಕ್ಕಿನ ಮಾತಿದು.

ಯೋತ್ಸ್ಯಮಾನಾನವೇಕ್ಷೇಽಹಂ ಯ ಏತೇಽತ್ರ ಸಮಾಗತಾಃ ।
ಧಾರ್ತರಾಷ್ಟ್ರಸ್ಯ ದುರ್ಬುದ್ಧೇರ್ಯುದ್ಧೇ ಪ್ರಿಯಚಿಕೀರ್ಷವಃ ॥೨೩॥

ಯೋತ್ಸ್ಯಮಾನಾನ್ ಅವೇಕ್ಷೇ ಅಹಮ್ ಯೇ ಏತೇ ಅತ್ರ ಸಮಾಗತಾಃ ।
ಧಾರ್ತರಾಷ್ಟ್ರಸ್ಯ ದುರ್ಬುದ್ಧೇ ಯುದ್ಧೇ ಪ್ರಿಯ ಚಿಕೀರ್ಷವಃ -- ಇಲ್ಲಿ ನೆರೆದ- ಈ ಕಾದ ಹೊರಟವರನ್ನು, ಬುದ್ಧಿಗೇಡಿಯಾದ ದುರ್ಯೋಧನನ ಹಿತವನ್ನು ಬಯಸಿ ಯುದ್ಧದಲ್ಲಿ ಆತನಿಗೆ ಹೆಗಲು ಕೊಡ ಬಯಸಿದವರನ್ನು, ನಾನೊಮ್ಮೆ ನೋಡುತ್ತೇನೆ ಎನ್ನುತ್ತಾನೆ ಅರ್ಜುನ.

"ಬುದ್ಧಿಗೇಡಿ ದುರ್ಯೋಧನನಿಗೆ ಜಯವಾಗಬೇಕು ಎಂದು ಬಯಸಿ, ನಮಗೆ ತೊಂದರೆ ಕೊಡಲು ನನ್ನ ವಿರುದ್ಧ ನಿಂತವರನ್ನೊಮ್ಮೆ ನಾನು ನೋಡಬೇಕು" ಎಂದು ಅರ್ಜುನ ಶ್ರೀಕೃಷ್ಣನಲ್ಲಿ ಆಜ್ಞಾರೂಪಿ ಸ್ವರದಲ್ಲಿ ಹೇಳುತ್ತಾನೆ. ಇಲ್ಲಿ "ನನ್ನ ವಿರುದ್ಧ ನಿಂತವರನ್ನು ನಾನೊಮ್ಮೆ ನೋಡಬೇಕು" ಎಂದು ಶ್ರೀಕೃಷ್ಣನಲ್ಲಿ ಹೇಳುತ್ತಿರುವ ಅರ್ಜುನ ಅಹಂಕಾರದ ದಾಸನಾಗಿರುವುದು ಸ್ಪಷ್ಟವಾಗಿ ನಮಗೆ ಕಾಣುತ್ತದೆ. ಈ ಅಹಂಕಾರದಲ್ಲಿ ಅರ್ಜುನ ಭಗವಂತನನ್ನೇ ಮರೆತು ಮಾತನಾಡುತ್ತಿದ್ದಾನೆ.

ಸಂಜಯ ಉವಾಚ ।
ಏವಮುಕ್ತೋ ಹೃಷೀಕೇಶೋ ಗುಡಾಕೇಶೇನ ಭಾರತ ।
ಸೇನಯೋರುಭಯೋರ್ಮಧ್ಯೇ ಸ್ಥಾಪಯಿತ್ವಾ ರಥೋತ್ತಮಮ್ ॥೨೪॥

ಸಂಜಯ ಉವಾಚ- ಸಂಜಯನು ಹೇಳಿದನು:
ಏವಮ್ ಉಕ್ತಃ ಹೃಷೀಕೇಶಃ ಗುಡಾಕೇಶೇನ ಭಾರತ ।
ಸೇನಯೋಃ ಉಭಯೋಃ ಮಧ್ಯೇ ಸ್ಥಾಪಯಿತ್ವಾ ರಥ ಉತ್ತಮಮ್ -- ಓ ಭರತವಂಶದ ದೊರೆಯೇ, ಗುಡಾಕೇಶನ ಮಾತನ್ನು ಆಲಿಸಿದ ಹೃಷೀಕೇಶ, ಎರಡು ಸೈನ್ಯದ ಮಧ್ಯೆ ಹಿರಿಯ ತೇರನ್ನು ನಿಲ್ಲಿಸಿದ.

ಇಂದ್ರಿಯದ ದೊರೆಯಾದ ಶ್ರೀಕೃಷ್ಣನು ಏನೂ ಮಾತನಾಡದೇ, ರಥವನ್ನು ಎರಡು ಸೈನ್ಯದ ಮಧ್ಯೆ ನಿಲ್ಲಿಸಿದ. ಇಲ್ಲಿಂದ ಮುಂದೆ ನಾವು ಶ್ರೀಕೃಷ್ಣನ ಪ್ರತಿಯೊಂದು ನಡೆಯಲ್ಲಿ ಮನಃಶಾಸ್ತ್ರೀಯ ಚಿಕಿತ್ಸಾ ಪದ್ಧತಿಯನ್ನು(Psychotherapy) ಕಾಣಬಹುದು. ಅಹಂಕಾರವೆನ್ನುವುದು ಒಂದು ಮಾನಸಿಕ ಸ್ಥಿತಿ. ನಾವು ಅಂತಹ ಸ್ಥಿತಿಯಿಂದ ಹೊರಬರಬೇಕಾದರೆ, ನಮಗೆ ಮಾನಸಿಕ ಚಿಕಿತ್ಸೆ ಬೇಕು. ಅದನ್ನೇ ಕೃಷ್ಣ ಇಲ್ಲಿ ಮಾಡಿ ತೋರಿಸಿದ್ದಾನೆ. ಇಂತಹ ಶ್ರೀಕೃಷ್ಣನನ್ನು ನಾವು ಮನಃಶಾಸ್ತ್ರದ ಪಿತಾಮಹ(Father of Psychology) ಎಂದು ಕರೆದರೆ ತಪ್ಪಾಗದು. ಮನಃಶಾಸ್ತ್ರದ ಅನೇಕ ವಿಷಯಗಳು ಗೀತೆಯ ಮೊದಲ ಅಧ್ಯಾಯದಲ್ಲೇ ಅಡಗಿದೆ.
ಈ ಶ್ಲೋಕದಲ್ಲಿ ಕೃಷ್ಣನನ್ನು ಹೃಷೀಕೇಶ ಎಂದೂ, ಹಾಗೂ ಅರ್ಜುನನನ್ನು ಗುಡಾಕೇಶನೆಂದೂ ಸಂಬೋಧಿಸಿದ್ದಾರೆ. ಗುಡಾಕೇಶ ಎಂದರೆ ನಿದ್ದೆಯನ್ನು ಗೆದ್ದ ವೀರ ಎಂದರ್ಥ.

ಭೀಷ್ಮದ್ರೋಣಪ್ರಮುಖತಃ ಸರ್ವೇಷಾಂ ಚ ಮಹೀಕ್ಷಿತಾಮ್ ।
ಉವಾಚ ಪಾರ್ಥ ಪಶ್ಯೈತಾನ್ ಸಮವೇತಾನ್ ಕುರೂನಿತಿ ॥೨೫॥

ಭೀಷ್ಮಃ ದ್ರೋಣ ಪ್ರಮುಖತಃ ಸರ್ವೇಷಾಮ್ ಚ ಮಹೀಕ್ಷಿತಾಮ್ ।
ಉವಾಚ ಪಾರ್ಥ ಪಶ್ಯ ಏತಾನ್ ಸಮವೇತಾನ್ ಕುರೂನ್ ಇತಿ -- ಭೀಷ್ಮ, ದ್ರೋಣರು, ಹಾಗೂ ಇತರ ಅರಸರು ನೇರವಾಗಿ ಕಣ್ಣಿಗೆ ಬೀಳುವಂತೆ ರಥವನ್ನು ನಿಲ್ಲಿಸಿ ಕೃಷ್ಣ ಹೇಳುತ್ತಾನೆ: "ಹೇ ಪಾರ್ಥಾ, ನೋಡು ಈ ನೆರೆದ ಕುರುಗಳನ್ನು" ಎಂದು.

ಶ್ರೀಕೃಷ್ಣನು ಅರ್ಜುನನ ಅಣತಿಯಂತೆ ರಥವನ್ನು ಎರಡೂ ಸೈನ್ಯದ ಮಧ್ಯದಲ್ಲಿ ತಂದು, ಭೀಷ್ಮ-ದ್ರೋಣರು ಮತ್ತು ಎಲ್ಲಾ ಅರಸರು ನೇರವಾಗಿ ಕಣ್ಣಿಗೆ ಕಾಣುವಂತೆ ನಿಲ್ಲಿಸಿ, ಭಾಂದವ್ಯವನ್ನು ಬಡಿದೇಳಿಸುವ ಧ್ವನಿಯಲ್ಲಿ ಹೇಳುತ್ತಾನೆ: "ಹೇ ಪಾರ್ಥಾ, ಇಲ್ಲಿ ಸೇರಿರುವ ನಿನ್ನ 'ಕುರುಗಳನ್ನು' ನೋಡು" ಎಂದು.
ಇದು ಶ್ರೀಕೃಷ್ಣನ ಅದ್ಭುತ ಮಾನಸಿಕ ಚಿಕಿತ್ಸೆ(Psycho therapy). ಇಲ್ಲಿ ಅರ್ಜುನನ ಮನಃಸ್ಥಿತಿಯ ಪರೀಕ್ಷೆ ನಡೆಯುತ್ತಿದೆ. ಅರ್ಜುನ ಒಬ್ಬ ರಾಜ. ಆತನ ಮೂಲ ಕರ್ತವ್ಯ ಧರ್ಮದ ಪರ ಹೋರಾಟ ಮಾಡುವುದು ಹಾಗೂ ಪ್ರಜಾಪಾಲನೆ ಮಾಡುವುದು. ಹೀಗೆ ತನ್ನ ಕರ್ತವ್ಯಪಾಲನೆ ಮಾಡುತ್ತಿರುವಾಗ, ಧರ್ಮದ ವಿರುದ್ಧ ನಿಂತವರು ಯಾರೇ ಆಗಿರಲಿ, ಅವರನ್ನು ಶಿಕ್ಷಿಸುವುದು ಆತನ ಕರ್ತವ್ಯ. ಆತನೊಬ್ಬ ನ್ಯಾಯಾಧೀಶನಿದ್ದಂತೆ. ಇಲ್ಲಿ ನನ್ನ ಕುಟುಬದವರು, ನನ್ನ ಬಂಧುಗಳು, ನನ್ನ ಸ್ನೇಹಿತರು ಎನ್ನುವ ತಾರತಮ್ಯ ಸಲ್ಲದು. ಇಂತಹ ಜವಾಬ್ದಾರಿಯುತ ಕಾರ್ಯದಲ್ಲಿ ತೊಡಗಿದ ಅರ್ಜುನ, ತನ್ನ ಸಮೀಪಬಂಧುಗಳನ್ನು, ಗುರುಗಳನ್ನು ಕಂಡಾಗ ಹೇಗೆ ಪರಿತಪಿಸುತ್ತಾನೆ ಎನ್ನುವುದನ್ನು ಮುಂದಿನ ಶ್ಲೋಕದಲ್ಲಿ ನೋಡೋಣ.

ತತ್ರಾಪಶ್ಯತ್ ಸ್ಥಿತಾನ್ ಪಾರ್ಥಃ ಪಿತೃನಥ ಪಿತಾಮಹಾನ್ ।
ಆಚಾರ್ಯಾನ್ಮಾತುಲಾನ್ ಭ್ರಾತೃನ್ ಪುತ್ರಾನ್ ಪೌತ್ರಾನ್ ಸಖೀಂಸ್ತಥಾ ॥೨೬॥
ಶ್ವಶುರಾನ್ ಸುಹೃದಶ್ಚೈವ ಸೇನಯೋರುಭಯೋರಪಿ ।

ತತ್ರ ಅಪಶ್ಯತ್ ಸ್ಥಿತಾನ್ ಪಾರ್ಥಃ ಪಿತೃನ್ ಅಥ ಪಿತಾಮಹಾನ್ ।
ಆಚಾರ್ಯಾನ್ ಮಾತುಲಾನ್ ಭ್ರಾತೃನ್ ಪುತ್ರಾನ್ ಪೌತ್ರಾನ್ ಸಖೀನ್ ತಥಾ ॥
ಶ್ವಶುರಾನ್ ಸುಹೃದಃ ಚ ಏವ ಸೇನಯೋಃ ಉಭಯೋಃ ಅಪಿ -- ಅಲ್ಲಿ ಎರಡೂ ಕಡೆಯ ಪಡೆಗಳಲ್ಲಿ ನೆರೆದವರನ್ನು ಅರ್ಜುನನು ಕಂಡನು. ತಂದೆಯಂತಿರುವವರನ್ನು, ಅಜ್ಜಂದಿರನ್ನು, ಗುರುಗಳನ್ನು, ಸೋದರಮಾವಂದಿರನ್ನು, ಅಣ್ಣ-ತಮ್ಮಂದಿರನ್ನು, ಮಕ್ಕಳನ್ನು, ಮೊಮ್ಮಕ್ಕಳನ್ನು, ಸಂಗಾತಿಗಳನ್ನು ಮಾವಂದಿರನ್ನು ಮತ್ತು ಗೆಳೆಯರನ್ನು.

ಕೃಷ್ಣನು ರಥವನ್ನು ಅರ್ಜುನನ ಆತ್ಮೀಯ ಬಂಧುಗಳ ಎದುರು ನಿಲ್ಲಿಸಿದ್ದರಿಂದ, ಅಲ್ಲಿ ನೆರೆದ ಎಲ್ಲರನ್ನೂ ಅರ್ಜುನ ನೋಡುತ್ತಾನೆ. ಇಷ್ಟು ಹೊತ್ತು ಜಂಭದ ಮಾತನಾಡಿದ ಆತನಿಗೆ ಈಗ ತನ್ನೆದುರಿಗೆ ನಿಂತ ತಂದೆ ಸಮಾನರು, ಅಜ್ಜಂದಿರು, ವಿದ್ಯೆ ಕೊಟ್ಟ ಆಚಾರ್ಯರು, ಸೋದರಮಾವಂದಿರು, ಅಣ್ಣತಮ್ಮಂದಿರು, ಮಕ್ಕಳು, ಮೊಮ್ಮೊಕ್ಕಳು, ಸ್ನೇಹ ಸಂಗಾತಿಗಳು, ಮಾವಂದಿರು, ಹಿತೈಷಿಗಳು, ಎಲ್ಲರೂ ಎರಡೂ ಕಡೆಗಳಲ್ಲಿ ಕಾಣಿಸುತ್ತಾರೆ.
ಎಚ್ಚರದಿಂದ ಈ ಶ್ಲೋಕವನ್ನು ಗಮನಿಸಿದರೆ, ಅರ್ಜುನನಿಗೆ ಯುದ್ಧರಂಗದಲ್ಲಿ ಅನೇಕ ಮಂದಿ ಪ್ರಮುಖರಿದ್ದರೂ ಕೂಡಾ ಅಲ್ಲಿ ಕಾಣಿಸಿದ್ದು ಕೇವಲ ಗುರು ಹಿರಿಯರು, ಬಂಧುಗಳು ಮತ್ತು ಆತ್ಮೀಯರು. ಇಲ್ಲಿ ಆತನಿಗೆ ಬಂಧು ಪ್ರೇಮ ಎಚ್ಚರ ಆಗಿರುವುದು ಸ್ಪಷ್ಟವಾಗಿ ಕಾಣುತ್ತದೆ. ಕರ್ತವ್ಯನಿರತ ಜನಪಾಲಕ ರಾಜನಿಗೆ ಬಂಧು ಪ್ರೇಮ ತರವಲ್ಲ. ಪ್ರಜಾಪಾಲಕನಾದವನಿಗೆ ಪ್ರಜಾಪಾಲನೆ ಮೂಲಧರ್ಮ. ಅದನ್ನು ಆತ ಎಂದೂ ಚ್ಯುತಿ ಬರದಂತೆ ನಿರ್ವಹಿಸಬೇಕು. ಈ ರೀತಿ ಕಾರ್ಯ ನಿರ್ವಹಿಸುತ್ತಿರುವಾಗ 'ನನ್ನ ಬಂಧುಗಳು, ನನ್ನ ಪರಿವಾರ' ಎಂದು ಯಾವುದೇ ತಾರತಮ್ಯ ಮಾಡುವಂತಿಲ್ಲ.

ತಾನ್ ಸಮೀಕ್ಷ್ಯ ಸ ಕೌಂತೇಯಃ ಸರ್ವಾನ್ ಬಂಧೂನವಸ್ಥಿತಾನ್ ॥೨೭॥
ಕೃಪಯಾ ಪರಯಾऽऽವಿಷ್ಟೋ ವಿಷೀದನ್ನಿದಮಬ್ರವೀತ್ ।

ತಾನ್ ಸಮೀಕ್ಷ್ಯ ಸಃ ಕೌಂತೇಯಃ ಸರ್ವಾನ್ ಬಂಧೂನ್ ಅವಸ್ಥಿತಾನ್ ।
ಕೃಪಯಾ ಪರಯಾ ಆವಿಷ್ಟಃ ವಿಷೀದನ್ ಇದಮ್ ಅಬ್ರವೀತ್ -- ಆ ಎಲ್ಲಾ ಬಂಧುಗಳು ಒಂದೆಡೆ ಸೇರಿರುವುದನ್ನು ಕಂಡ ಅರ್ಜುನ ಕಡು ಕರುಣೆಗೊಳಗಾಗಿ, ಭಾವಪರವಶನಾಗಿ-ಹೀಗೆ ಹೇಳಿದನು

ಆ ಎಲ್ಲಾ ಬಂಧುಗಳು ಒಂದುಗೂಡಿರುವುದನ್ನು ಕಂಡ ಅರ್ಜುನ, ಕರುಣೆಗೊಳಗಾಗಿ, ಕಾರುಣ್ಯದಿಂದ, ದುಖಃದಿಂದ, ತನ್ನ ತುಮುಲವನ್ನು ಕೃಷ್ಣನಲ್ಲಿ ತೋಡಿಕೊಳ್ಳುತ್ತಾನೆ.

ಇಲ್ಲಿಂದ ಮುಂದೆ ಅರ್ಜುನ ಅನೇಕ ರೀತಿಯಲ್ಲಿ ತನ್ನ ಅಳಲನ್ನು ಶ್ರೀಕೃಷ್ಣನ ಮುಂದೆ ತೊಡಿಕೊಳ್ಳುವುದನ್ನು ಕಾಣುತ್ತೇವೆ. ಮುಂದಿನ ಶ್ಲೋಕಗಳನ್ನು ನೋಡುವ ಮೊದಲು ಇಲ್ಲಿ ಒಂದು ಪುಟ್ಟ ವಿಶ್ಲೇಷಣೆ ಮಾಡೋಣ. ಗೀತೆಯನ್ನು ಓದುವಾಗ ಕೆಲವರಿಗೆ ಶ್ರೀಕೃಷ್ಣನ ನಡೆ ಅರ್ಥವಾಗುವುದಿಲ್ಲ. "ಅಯ್ಯೋ- ಹೇಗೆ ನನ್ನ ಬಂಧುಗಳ ವಿರುದ್ಧ ಹೋರಾಡಲಿ" ಎಂದು ಅರ್ಜುನ ಕೇಳಿದರೆ, ಕೃಷ್ಣ "ಯುದ್ಧ ಮಾಡು" ಎಂದು ಹೇಳುತ್ತಾನೆ. ಇದು ನ್ಯಾಯವೇ ಎನ್ನುವ ಪ್ರಶ್ನೆ ಹೆಚ್ಚಿನವರನ್ನು ಕಾಡುತ್ತದೆ. ಇಲ್ಲಿ ನಾವು ಗಮನಿಸಬೇಕಾದ ವಿಷಯವೆಂದರೆ, ಅರ್ಜುನ

ಒಬ್ಬ ಸಾಮಾನ್ಯ ವ್ಯಕ್ತಿಯಾಗಿ ಈ ಮಾತನ್ನು ಹೇಳಿದ್ದರೆ ಖಂಡಿತವಾಗಿ ನಾವು ಒಪ್ಪಬೇಕಾದ ವಿಷಯವಿದು. ಆದರೆ ಇಲ್ಲಿ ಆತ ಭರತಖಂಡದ ರಕ್ಷಕನಾಗಿ ಧರ್ಮದ ಪರ ಹೋರಾಟಮಾಡಲು ಧರ್ಮರಾಯನ ಪರ ನಿಂತ ಅರಸ. ಆತ ಒಂದು ವೇಳೆ "ನಮಗೋಸ್ಕರ ಭರತ ಖಂಡದ ಜನರು ಸಾಯುವುದು ಬೇಡ" ಎಂದಿದ್ದರೆ ಒಪ್ಪಬಹುದಿತ್ತು. ಆದರೆ ಆತ ಹಾಗೆ ಹೇಳಲಿಲ್ಲ. ಆತನಿಗೆ ಅಲ್ಲಿ ಕಾಣಿಸಿದ್ದು ಕೇವಲ ಬಂಧುಗಳು. ರಾಜನಾದವನಿಗೆ ಧರ್ಮದ ಕಡೆ ನಿಂತವನು ಮಾತ್ರ ಬಂಧು. ಧರ್ಮದ ವಿರುದ್ಧ ಯಾರೇ ನಿಂತಿರಲೀ ಆತ ಕೇವಲ ಅಪರಾಧಿ. ಅವರನ್ನು ಶಿಕ್ಷಿಸುವುದು ರಾಜನ ಪರಮ ಧರ್ಮ. ನ್ಯಾಯ ಸ್ಥಾನದಲ್ಲಿ ನಿಂತ ನ್ಯಾಯಾಧೀಶ, ಅನ್ಯಾಯ ಮಾಡಿ ಬಂದ ತನ್ನ ಬಂಧುವನ್ನು 'ನನ್ನ ಕಡೆಯವನು' ಎಂದು ಹೇಗೆ ಕ್ಷಮಿಸುವಂತಿಲ್ಲವೋ, ಹಾಗೇ ರಾಜನಾದವನೂ ಕೂಡಾ ಇಲ್ಲಿ ನೋಡಬೇಕಾದದ್ದು ಧರ್ಮವನ್ನು ಹೊರತು ಬಂಧುತ್ವವನ್ನಲ್ಲ.

ಮುಂದೆ ಅರ್ಜುನ ಅನೇಕ ರೀತಿಯಲ್ಲಿ ತನ್ನ ವಿತಂಡವಾದದಿಂದ(**Arguments**) ಶ್ರೀಕೃಷ್ಣನನ್ನು ಸಮಜಾಯಿಸಲು (**Convince**) ನೋಡುತ್ತಾನೆ. ಆದರೆ ಶ್ರೀಕೃಷ್ಣ ಎಲ್ಲೂ ಈ ವಿತಂಡವಾದಕ್ಕೆ ನೇರ ಉತ್ತರ ಕೊಡುವುದಿಲ್ಲ. ಏಕೆಂದರೆ ಒಂದು ವೇಳೆ ಹಾಗೆ ಮಾಡಿದ್ದರೆ ಆತ ಬೇಡವಾದ ವಾದಕ್ಕೆ ಮಣೆ ಹಾಕಿದಂತಾಗುತ್ತಿತ್ತು. ಮಾನಸಿಕ ತುಮುಲದಲ್ಲಿರುವ ಅರ್ಜುನ ಆಡುವ ಪ್ರತಿಯೊಂದು ಮಾತನ್ನೂ ಒಬ್ಬ ಉತ್ತಮ ಕೇಳುಗನಂತೆ ಕೇಳಿ, ಆನಂತರ ಒಬ್ಬ ಮಾನಸಿಕ ರೋಗಿಗೆ ಚಿಕಿತ್ಸೆ ಕೊಡುವ ರೀತಿಯಲ್ಲಿ ಕೃಷ್ಣ ನಡೆದಿರುವುದನ್ನು ನಾವು ಕಾಣುತ್ತೇವೆ.

ಬನ್ನಿ ಈ ಅಂಶಗಳನ್ನು ಗಮನದಲ್ಲಿಟ್ಟುಕೊಂಡು ಮುಂದಿನ ಶ್ಲೋಕವನ್ನು ನೋಡೋಣ.

ಅರ್ಜುನ ಉವಾಚ ।

ದೃಷ್ಟ್ವೇಮಂ ಸ್ವಜನಂ ಕೃಷ್ಣ ಯುಯುತ್ಸುಂ ಸಮುಪಸ್ಥಿತಮ್ ॥೨೮॥
ಸೀದಂತಿ ಮಮ ಗಾತ್ರಾಣಿ ಮುಖಂ ಚ ಪರಿಶುಷ್ಯತಿ ।
ವೇಪಥುಶ್ಚ ಶರೀರೇ ಮೇ ರೋಮಹರ್ಷಶ್ಚ ಜಾಯತೇ ॥೨೯॥

ಅರ್ಜುನಃ ಉವಾಚ -- ಅರ್ಜುನ ಹೇಳಿದನು:
ದೃಷ್ಟ್ವಾ ಇಮಮ್ ಸ್ವಜನಮ್ ಕೃಷ್ಣ ಯುಯುತ್ಸುಮ್ ಸಮುಪಸ್ಥಿತಮ್ ॥
ಸೀದಂತಿ ಮಮ ಗಾತ್ರಾಣಿ ಮುಖಮ್ ಚ ಪರಿಶುಷ್ಯತಿ ।
ವೇಪಥುಃ ಚ ಶರೀರೇ ಮೇ ರೋಮ ಹರ್ಷಃ ಚ ಜಾಯತೇ -- ಕೃಷ್ಣಾ, ಯುದ್ಧೋತ್ಸಾಹದಿಂದ ಇಲ್ಲಿ ನೆರೆದ ನಮ್ಮ ಮಂದಿಯನ್ನು ನೋಡಿದಾಗ ನನ್ನ ಅಂಗಾಂಗಗಳು ಕಂಗೆಡುತ್ತಿವೆ. ಬಾಯಿಯೂ ಬತ್ತುತ್ತಿದೆ. ನನ್ನ ಮೈಯೆಲ್ಲವೂ ನವಿರೆದ್ದು ನಡುಗುತ್ತಿದೆ.

ಅರ್ಜುನ ಹೇಳುತ್ತಾನೆ: "ಇಲ್ಲಿ ನೆರೆದ ನನ್ನ ಹಿರಿಯ ಬಂಧುಗಳನ್ನು ನೋಡಿದಾಗ ನನ್ನ ಅಂಗಾಂಗಗಳು ಮುದುಡುತ್ತಿವೆ. ನಾವು ಪರಸ್ಪರ ಸ್ನೇಹಪೂರ್ವಕವಾಗಿ ಬದುಕಬೇಕಾದವರು ಇಂದು ಈ ರಣರಂಗದಲ್ಲಿ ಎದುರುಬದುರಾಗಿ ಹೊಡೆದಾಡಿಕೊಳ್ಳಲು ನಿಂತಿರುವುದನ್ನು ಕಂಡು ನನ್ನ ಮುಖ ನಾಚಿಕೆಯಿಂದ ಬಾಡುತ್ತಿದೆ.

ತಿಳುವಳಿಕೆಯುಳ್ಳ ನಾವೇ ಇಂತಹ ಅಸಹ್ಯ ಕೆಲಸಕ್ಕೆ ಇಳಿದುಬಿಟ್ಟೆವಲ್ಲಾ. ಈ ತೀರ್ಮಾನವನ್ನು ನಾವೇ ಮಾಡಿ ಅದಕ್ಕೆ ನಾವೇ ಬದ್ಧರಾಗಿ ರಣರಂಗದಲ್ಲಿ ನಿಂತಿದ್ದೇವಲ್ಲ. ನಮ್ಮವರನ್ನು ನೋಡಿ ಮೈ ಮುದುಡುತ್ತಿದೆ. ಮುಖ ಒಣಗಿ ಮಾತನಾಡಲು ಆಗುತ್ತಿಲ್ಲ. ಎಷ್ಟು ಕೆಳಮಟ್ಟಕ್ಕಿಳಿದೆವು ನಾವು. ಇದನ್ನು ಯೋಚಿಸಿದರೆ ನಡುಕ ಬರುತ್ತದೆ" ಎನ್ನುತ್ತಾನೆ. ಇಲ್ಲಿ ಅರ್ಜುನನ ಮಾತಿನಲ್ಲಿ ಮೊದಲು ಅನುಕಂಪ, ಅದರಿಂದ ಲಜ್ಜೆ, ಅದರಿಂದ ಭಯ, ಅದರಿಂದ ವಿಸ್ಮಯ ವ್ಯಕ್ತವಾಗಿರುವುದನ್ನು ನಾವು ಕಾಣುತ್ತೇವೆ.

ಗಾಂಡೀವಂ ಸ್ರಂಸತೇ ಹಸ್ತಾತ್ ತ್ವಕ್ ಚೈವ ಪರಿದಹ್ಯತೇ ।
ನಚ ಶಕ್ನೋಮ್ಯವಸ್ಥಾತುಂ ಭ್ರಮತೀವ ಚ ಮೇ ಮನಃ ॥ ೩೦ ॥

ಗಾಂಡೀವಮ್ ಸ್ರಂಸತೇ ಹಸ್ತಾತ್ ತ್ವಕ್ ಚ ಏವ ಪರಿದಹ್ಯತೇ ।
ನಚ ಶಕ್ನೋಮಿ ಅವಸ್ಥಾತುಂ ಭ್ರಮತಿ ಇವ ಚ ಮೇ ಮನಃ -- ಗಾಂಡೀವ ಕೈಯಿಂದ ಜಾರುತ್ತಿದೆ, ತೊಗಲು ಉರಿಯೆದ್ದಿದೆ. ನಿಂತಲ್ಲಿ ನಿಲ್ಲಲಾಗುತ್ತಿಲ್ಲ. ನನ್ನ ಮನಸ್ಸು ಗೊಂದಲಮಯವಾಗುತ್ತಿದೆ.

ಒಬ್ಬ ವ್ಯಕ್ತಿ ತನ್ನ ಆತ್ಮ ವಿಶ್ವಾಸವನ್ನು ಕಳೆದುಕೊಂಡಾಗ, ಆತನ ಅಂತರಂಗದ ಅನುಭವ ದೈಹಿಕವಾಗಿ ಹೇಗೆ ಹೊರಹೊಮ್ಮುತ್ತದೆ ಎನ್ನುವುದನ್ನು ಇಲ್ಲಿ ಕಾಣಬಹುದು. ಆತ್ಮವಿಶ್ವಾಸವಿರದ ವ್ಯಕ್ತಿ ತನ್ನ ಮುಷ್ಠಿ ಬಿಗಿ ಹಿಡಿಯಲಾರ. ಇಲ್ಲಿ ಅರ್ಜುನನ ಸ್ಥಿತಿ ಕೂಡಾ ಹಾಗೇ ಆಗಿದೆ. ಆತ ಹೇಳುತ್ತಾನೆ: "ಗಾಂಡೀವ ನನ್ನ ಕೈಯಿಂದ ಜಾರುತ್ತಿದೆ, ಇಡೀ ಮೈ ಉರಿ ಎದ್ದ ಹಾಗೆ ಸಂಕಟವಾಗುತ್ತಿದೆ" ಎಂದು. ಇದು ಒಳಗಿನ ಭಾವದ, ತುಮುಲದ ಅಭಿವ್ಯಕ್ತ. ಒಮ್ಮೆ ಮನಸ್ಸು ಸ್ಥಿರವಿಲ್ಲದಿದ್ದರೆ ದೇಹಕೂಡಾ ಸ್ಥಿರವಿರಲಾರದು. ಅದೇ ರೀತಿ ದೇಹ ಸ್ಥಿರವಿಲ್ಲದಿದ್ದರೆ ಮನಸ್ಸನ್ನು ಸ್ಥಿರಗೊಳಿಸುವುದು ಸಾಧ್ಯವಿಲ್ಲ. "ಈ ರಥದಲ್ಲಿ ಕುಳಿತುಕೊಳ್ಳಲು ಆಗುತ್ತಿಲ್ಲ. ಮನಸ್ಸು ಗೊಂದಲಮಯವಾಗಿದೆ" ಎಂದು ಕೃಷ್ಣನಲ್ಲಿ ಅರ್ಜುನ ಪರಿತಪಿಸುತ್ತಾನೆ.

ನಿಮಿತ್ತಾನಿ ಚ ಪಶ್ಯಾಮಿ ವಿಪರೀತಾನಿ ಕೇಶವ ।
ನಚ ಶ್ರೇಯೋಽನುಪಶ್ಯಾಮಿ ಹತ್ವಾ ಸ್ವಜನಮಾಹವೇ ॥ ೩೧ ॥

ನಿಮಿತ್ತಾನಿ ಚ ಪಶ್ಯಾಮಿ ವಿಪರೀತಾನಿ ಕೇಶವ ।
ನ ಚ ಶ್ರೇಯಃ ಅನುಪಶ್ಯಾಮಿ ಹತ್ವಾ ಸ್ವಜನಮ್ ಆಹವೇ -- ಕೇಶವಾ, ಕೆಟ್ಟ ಶಕುನಗಳನ್ನೇ ಕಾಣುತ್ತಿದ್ದೇನೆ. ಕದನದಲ್ಲಿ ನಮ್ಮ ಮಂದಿಯನ್ನೇ ಕೊಂದು ಏನು ಒಳಿತೋ ತಿಳಿಯದು.

'ನಿಮಿತ್ತಗಳು' ಎಂದರೆ ಶಕುನಗಳು. ಇಲ್ಲಿ ಅರ್ಜುನ ಹಿಂದೆ ನಡೆದ ಕೆಲವು ಕೆಟ್ಟ ಶಕುನಗಳನ್ನು ನೆನಪಿಸಿಕೊಳ್ಳುತ್ತಾನೆ. ಈ ಶಕುನಗಳನ್ನು ಆತ ಯುದ್ಧ ಭೂಮಿಗೆ ಬರುವ ಮೊದಲೇ ಗಮನಿಸಿದ್ದ. ಆದರೆ ಆತನಿಗೆ ಅದು ಈಗ ನೆನಪಿಗೆ ಬರುತ್ತಿದೆ.

ಹಿಂದಿನವರು ಶಕುನಗಳಿಗೆ ಬಹಳ ಮಹತ್ವ ಕೊಡುತ್ತಿದ್ದರು. ಈ ಪ್ರಪಂಚದಲ್ಲಿ ಎಲ್ಲವೂ ಒಂದಕ್ಕೊಂದು ಬೆಸೆದುಕೊಂಡಿದೆ. ಒಂದು ಪರಮಾಣುವಿನಿಂದ ಹಿಡಿದು ಬ್ರಹ್ಮಾಂಡದ ತನಕ ಒಂದಕ್ಕೊಂದು ಸುಸಂಬದ್ಧವಾಗಿ

ಎಲ್ಲವೂ ಗಣಿತಬದ್ಧ. ಈ ಕಾರಣದಿಂದ ಯಾವುದನ್ನು ಬೇಕಾದರೂ ಗಣಿತಬದ್ಧವಾಗಿ ಕಂಡುಕೊಳ್ಳಬಹುದು. ಇದೇ ಜ್ಯೋತಿಷ್ಯ, ಶಕುನ, ಪಂಚಾಗ ಇತ್ಯಾದಿ. ಇಲ್ಲಿ ಯಾವುದೂ ಆಕಸ್ಮಿಕವಲ್ಲ. ನಮಗೆ ತಿಳಿಯದಿದ್ದಾಗ ಮಾತ್ರ ಅದು ನಮಗೆ ಆಕಸ್ಮಿಕ.

ಮಹಾಭಾರತ ಕಾಲದಲ್ಲಿ ಕಂಡ ಕೆಲವು ಶಕುನಗಳನ್ನು ಇಲ್ಲಿ ನೋಡೋಣ: ಆನೆಗಳು, ಕುದುರೆಗಳು ಯುದ್ಧಕ್ಕೆ ಮೊದಲು ಕಣ್ಣೀರು ಸುರಿಸುತ್ತಿದ್ದವು. ನರಿಗಳು ಸೇನಾಪಡೆಯ ಸುತ್ತ ಊಳಿಡುತ್ತಿದ್ದವು. ಪ್ರಾಣಿಗಳಿಗೆ ರಕ್ತಪಾತದ ಹಾಗೂ ಸಾವಿನ ಮುನ್ಸೂಚನೆ ಇರುತ್ತದೆ. ಮುಂದೆ ನಡೆಯುವುದನ್ನು ಅವು ನಿಖರವಾಗಿ ಗ್ರಹಿಸಬಲ್ಲವು. ಇದು ಮಹಾಭಾರತ ಯುದ್ಧಕ್ಕೆ ಮೊದಲು ಕಂಡ ಒಂದು ಶಕುನ. ಇನ್ನು ಬ್ರಹ್ಮಾಂಡದಲ್ಲಿ ಹದಿಮೂರು ದಿನಗಳ ಅಂತರದಲ್ಲಿ ಎರಡು ಗ್ರಹಣ ಮಹಾಭಾರತ ಯುದ್ಧಕಾಲದಲ್ಲಿ ಘಟಿಸಿದೆ. ಯುದ್ಧ ಪ್ರಾರಂಭವಾಗಿ ಐದನೇ ದಿನಕ್ಕೆ ಒಂದು ಗ್ರಹಣ, ಪುನಃ ಹದಿಮೂರು ದಿನಗಳ ಅಂತರದಲ್ಲಿ ಇನ್ನೊಂದು ಗ್ರಹಣ. ಇದು ಮೃತ್ಯು ಸೂಚಕ ಭೀಕರ ಶಕುನ. ಇದನ್ನು ವ್ಯಾಸರು ಮೊದಲೇ ಧೃತರಾಷ್ಟ್ರನಿಗೆ ತಿಳಿಸಿದ್ದರು. 'ಲೋಕಕಂಟಕನಾದ ನಿನ್ನ ಮಗನಿಂದ- ಲೋಕ ನಾಶವಾಗುತ್ತದೆ' ಎಂದು.

ಹೀಗೆ ಹಿಂದೆ ನಡೆದ ಶಕುನಗಳನ್ನು ನೆನಪಿಸಿದ ಅರ್ಜುನ, ಕೃಷ್ಣನನ್ನು 'ಕೇಶವ' ಎಂದು ಸಂಬೋಧಿಸುತ್ತಾನೆ. ಪ್ರಾರಂಭದಲ್ಲಿ 'ಕೃಷ್ಣ' ಎಂದು ಆತ ಸಂಬೋಧಿಸಿರುವುದನ್ನು ನಾವು ನೋಡಿದ್ದೇವೆ. ಕೃಷ್ಣ ಎಂದರೆ ಕೃಷಿ+ಣಃ - ಅಂದರೆ ಭೂಮಿಗೆ ಆನಂದವನ್ನು ಕೊಡಲು, ಬಲತುಂಬಲು ಬಂದವ ಎಂದರ್ಥ. ಕೇಶವ ಎಂದರೆ ಕಾ+ಈಶ+ವ. ಇಲ್ಲಿ 'ಕಾ' ಎಂದರೆ ಸೃಷ್ಟಿಗೆ ಕಾರಣವಾಗಿರುವ ಚತುರ್ಮುಖ ಬ್ರಹ್ಮ; 'ಈಶ' ಎಂದರೆ ಸಂಹಾರಕ್ಕೆ ಕಾರಣವಾಗಿರುವ ಶಂಕರ; ಕೇಶವ ಎಂದರೆ ಸೃಷ್ಟಿ-ಸಂಹಾರಕ್ಕೆ ಕಾರಣವಾಗಿರುವ ಪರಶಕ್ತಿ.

ಇಲ್ಲಿ ಅರ್ಜುನ ಕೃಷ್ಣನನ್ನು 'ಕೇಶವ' ಎಂದು ಸಂಬೋಧಿಸುತ್ತಿರುವುದಕ್ಕೆ ವಿಶೇಷ ಕಾರಣವಿದೆ. "ಭೂಮಿಗೆ ಆನಂದವನ್ನು, ತ್ರಾಣವನ್ನು ಕೊಡಲು ಇಳಿದುಬಂದ ಸೃಷ್ಟಿಕರ್ತನಾದ ನೀನೇ ಸಂಹಾರಕಾರಕನಾಗಿ, ಈ ಯುಗಾಂತದ ಮಹಾಯುದ್ಧದ ಸೂತ್ರದಾರಿಯಾಗಿ ಏಕೆ ನಿಂತೆ? ಏನು ನಿನ್ನ ಉದ್ದೇಶ?" ಎನ್ನುವುದು ಈ ವಿಶೇಷಣದ ಹಿಂದಿರುವ ಧ್ವನಿ. ಮಹಾಭಾರತ ಯುದ್ಧದ ಹದಿನೆಂಟನೇ ದಿನ ದ್ವಾಪರಯುಗ ಅಂತ್ಯವಾಗಿ ಕಲಿಯುಗ ಪ್ರಾರಂಭವಾದದ್ದನ್ನು ಇಲ್ಲಿ ನಾವು ನೆನಪಿಸಿಕೊಳ್ಳಬಹುದು.

ಇಲ್ಲಿಂದ ಮುದುವರಿದು ಅರ್ಜುನ ತಾನು ಏಕೆ ಯುದ್ಧ ಮಾಡಬಾರದು ಎನ್ನಲು ಕೆಲವು ಕಾರಣಗಳನ್ನು ಕೊಡಲಾರಂಭಿಸುತ್ತಾನೆ. "ನಚ ಶ್ರೇಯಃ ಅನುಪಶ್ಯಾಮಿ ಹತ್ವಾ ಸ್ವಜನಮ್ ಆಹವೇ"-'ನಮ್ಮ ಬಂಧುಗಳನ್ನು ಕೊಲ್ಲುವುದರಿಂದ ನಮ್ಮ ಹೆಸರು ಇತಿಹಾಸದಲ್ಲಿ, ಮುಂದಿನ ಯುಗಗಳಲ್ಲಿ ಪ್ರಶಂಸನೀಯವಾಗಿ ಉಳಿಯುತ್ತದೆ ಎಂದು ನನಗೆ ಯಾವ ನೆಲೆಯಲ್ಲೂ ಅನಿಸುವುದಿಲ್ಲ' ಎನ್ನುತ್ತಾನೆ ಅರ್ಜುನ.

ನ ಕಾಂಕ್ಷೇ ವಿಜಯಂ ಕೃಷ್ಣ ನಚ ರಾಜ್ಯಂ ಸುಖಾನಿ ಚ ।
ಕಿಂ ನೋ ರಾಜ್ಯೇನ ಗೋವಿಂದ ಕಿಂ ಭೋಗೈರ್ಜೀವಿತೇನ ವಾ ॥ ೩೨ ॥

ನ ಕಾಂಕ್ಷೇ ವಿಜಯಮ್ ಕೃಷ್ಣ ನ ಚ ರಾಜ್ಯಮ್ ಸುಖಾನಿ ಚ ।

ಕಿಮ್ ನಃ ರಾಜ್ಯೇನ ಗೋವಿಂದ ಕಿಮ್ ಭೋಗೈಃ ಜೀವಿತೇನ ವಾ -- ಕೃಷ್ಣಾ, ನಾನು ಗೆಲುವನ್ನು ಬಯಸುವುದಿಲ್ಲ; ಇಲ್ಲ ಅರಸೊತ್ತಿಗೆಯನ್ನು; ಸುಖಗಳನ್ನು ಕೂಡಾ. ಗೋವಿಂದಾ, ನಮಗೆ ದೊರೆತನದಿಂದೇನು? ಐಷಾರಾಮಗಳಿಂದೇನು ? ಬದುಕಿಯಾದರೂ ಏನು ?

ಅರ್ಜುನ ಧರ್ಮರಾಯನ ಪರ ಹೋರಾಟಕ್ಕೆ ನಿಂತವ. ಯುದ್ಧವನ್ನು ನಿಲ್ಲಿಸುವುದಾಗಲೀ ಅಥವಾ ನಿರ್ಣಯ ತೆಗೆದುಕೊಳ್ಳುವುದಾಗಲೀ ಅದು ಕೊನೆಯದಾಗಿ ಧರ್ಮರಾಯನ ವಿವೇಚನೆಯಂತೇ ನಡೆಯಬೇಕು. ಇಲ್ಲಿ ಅರ್ಜುನ ತಾನೇ ನಿರ್ಣಾಯಕ ಎನ್ನುವಂತೆ ಮಾತನಾಡುತ್ತಾನೆ. "ಯಾರಿಗೆ ಬೇಕಾಗಿದೆ ಈ ಗೆಲುವು ಕೃಷ್ಣಾ, ನನಗೆ ವಿಜಯ ಬೇಕಾಗಿಲ್ಲ, ನಾನು ಗುರುಹಿರಿಯರನ್ನು ಕೊಂದು, ಗೆಲುವನ್ನು ಬಯಸುವುದಿಲ್ಲ" ಎನ್ನುತ್ತಾನೆ. ಈ ಶ್ಲೋಕದಲ್ಲಿ ಆತ ಪುನಃ "ಕೃಷ್ಣ" ಎಂದು ಸಂಬೋಧಿಸುತ್ತಾನೆ. ಇಲ್ಲಿ "ಕೃಷ್ಣಃ" ಎಂದರೆ ಕರ್ಷಣೆ ಮಾಡುವವ. ತನ್ನ ಸೌಂದರ್ಯದಿಂದ ಆಕರ್ಷಿಸಿ ಉತ್ಕರ್ಷಣೆ ಮಾಡುವವ ಎಂದರ್ಥ. "ಲೋಕದ ಆಕರ್ಷಣ ಶಕ್ತಿಯಾದ ನೀನು ನಮ್ಮನ್ನು, ಈ ಹದಿನೆಂಟು ಅಕ್ಷೋಹಿಣಿ ಸೈನ್ಯವನ್ನು ಯುದ್ಧಭೂಮಿಗೇಕೆ ಎಳೆದುತಂದೆ?" ಎನ್ನುವ ಭಾವಾರ್ಥದಲ್ಲಿ ಅರ್ಜುನ ಮಾತನಾಡುತ್ತಾನೆ.

ಮುಂದುವರಿದು ಅರ್ಜುನ ಹೇಳುತ್ತಾನೆ: "ನಮಗೆ ಈ ರಾಜ್ಯ ಪಡೆದು ಏನಾಗಬೇಕಾಗಿದೆ? ಈ ರಾಜ್ಯವನ್ನು ಪಡೆದು, ಭೋಗವನ್ನು ಪಡೆದು ಏನು ಪ್ರಯೋಜನ ಗೋವಿಂದಾ?" ಎಂದು. ಇಲ್ಲಿ ಅರ್ಜುನ ಭಗವಂತನನ್ನು "ಗೋವಿಂದಃ" ಎಂದು ಸಂಬೋಧಿಸುತ್ತಾನೆ. ಗೋವಿಂದ ಎಂದರೆ ವೇದಗಳಿಂದ ವಾಚ್ಯನಾದವನು, ವೇದಗಳ ಸಮಗ್ರ ಅರ್ಥ ತಿಳಿದವನು, ಭೂಮಿಗಿಳಿದು ಬಂದವನು, ಗೋವುಗಳನ್ನು ಕಾಯ್ದವನು ಇತ್ಯಾದಿ. ಕೃಷ್ಣ ಎಷ್ಟೋ ದುಷ್ಟ ರಾಕ್ಷಸರ ಹಾಗೂ ರಾಜರ ಸಂಹಾರ ಮಾಡಿದವ. ಆದರೆ ಎಲ್ಲಿಯೂ ಸಿಂಹಾಸನವೇರಿ ಅರಸೊತ್ತಿಗೆ ಮಾಡಿರಲಿಲ್ಲ. ಗೋಪಾಲಕರ ಜೊತೆಗೆ ಸೇರಿ ಗೋವುಗಳನ್ನು ಕಾಯ್ದವ ಆತ. ಇಲ್ಲಿ ಅರ್ಜುನ "ನಿನ್ನಂತೆ ನನಗೆ ಯಾವುದೇ ಸಿಂಹಾಸನವೇರುವ ಆಸೆ ಇಲ್ಲ" ಎನ್ನುವ ಅರ್ಥದಲ್ಲಿ ಮಾತನಾಡುತ್ತಿದ್ದಾನೆ. "ಭೂಮಿಗಿಳಿದು ಬಂದ ನೀನು ನನ್ನನ್ನೇಕೆ ಯುದ್ಧಕ್ಕೆ ಪ್ರೇರೇಪಿಸುತ್ತಿದ್ದಿ? " ಎನ್ನುವ ಭಾವದಲ್ಲಿ ಆತ ಭಗವಂತನನ್ನು 'ಗೋವಿಂದ' ಎಂದು ಸಂಬೋಧಿಸಿದ್ದಾನೆ.

ಯೇಷಾಮರ್ಥೇ ಕಾಂಕ್ಷಿತಂ ನೋ ರಾಜ್ಯಂ ಭೋಗಾಃ ಸುಖಾನಿ ಚ।
ತ ಇಮೇಽವಸ್ಥಿತಾ ಯುದ್ಧೇ ಪ್ರಾಣಾಂಸ್ತ್ಯಕ್ತ್ವಾ ಧನಾನಿ ಚ ॥೩೩॥

ಯೇಷಾಮ್ ಅರ್ಥೇ ಕಾಂಕ್ಷಿತಂ ನಃ ರಾಜ್ಯಂ ಭೋಗಾಃ ಸುಖಾನಿ ಚ |
ತೇ ಇಮೇ ಅವಸ್ಥಿತಾಃ ಯುದ್ಧೇ ಪ್ರಾಣಾನ್ ತ್ಯಕ್ತ್ವಾ ಧನಾನಿ ಚ -- ಯಾರಿಗಾಗಿ ಅರಸೊತ್ತಿಗೆ? ಸುಖ-ಭೋಗಕ್ಕಾಗಿ ಇವರು ಹರಣದ ಮತ್ತು ಹಣದ ಹಂಗು ತೊರೆದು ಕಾಳಗದ ಕಣದಲ್ಲಿ ನಿಂತಿದ್ದಾರೆ.

ಒಂದು ವೇಳೆ ಈ ರಾಜಭೋಗ ಬೇಕಿದ್ದರೆ ಅದು ಯಾರಿಗೋಸ್ಕರ? ನಮ್ಮೆಲ್ಲಾ ಗುರು ಹಿರಿಯರ ಮಧ್ಯೆ ಸಂತೋಷದಿಂದ ನಾವಿರಬೇಕು. ಅವರನ್ನೆಲ್ಲಾ ಕೊಂದು ನಾವೇನು ಸಂತೋಷಪಡುವುದು? ಯಾರಿಗೋಸ್ಕರ

ಈ ಜೀವನದ ಸುಖವನ್ನು, ಸಾಮ್ರಾಜ್ಯವನ್ನು ಬಯಸುತ್ತಿದ್ದೇವೋ, ಅವರೆಲ್ಲರೂ ಪ್ರಾಣದ ಹಂಗನ್ನು ತೊರೆದು, ಸರ್ವಸ್ವವನ್ನೂ ಕಳೆದುಕೊಳ್ಳಲು ಸಿದ್ಧರಾಗಿ ನಮ್ಮೆದುರು ಯುದ್ಧಕ್ಕೆ ನಿಂತಿದ್ದಾರೆ.

ಆಚಾರ್ಯಾಃ ಪಿತರಃ ಪುತ್ರಾಸ್ತಥೈವ ಚ ಪಿತಾಮಹಾಃ ।
ಮಾತುಲಾಃ ಶ್ವಶುರಾಃ ಪೌತ್ರಾಃ ಸ್ಯಾಲಾಃ ಸಂಬಂಧಿನಸ್ತಥಾ ॥೩೪॥

ಆಚಾರ್ಯಾಃ ಪಿತರಃ ಪುತ್ರಾಃ ತಥಾ ಏವ ಚ ಪಿತಾಮಹಾಃ ।
ಮಾತುಲಾಃ ಶ್ವಶುರಾಃ ಪೌತ್ರಾಃ ಸ್ಯಾಲಾಃ ಸಂಬಂಧಿನಃ ತಥಾ -- ಗುರುಗಳು, ತಂದೆ ತಾಯಿಯಂತಿರುವವರು, ಮಕ್ಕಳು. ಅಂತೆಯೇ ಅಜ್ಜಂದಿರು, ಮಾವಂದಿರು, ಸೋದರ ಮಾವಂದಿರು, ಮೊಮ್ಮಕ್ಕಳು, ಮೈದುನಂದಿರು ಮತ್ತು ನೆಂಟರಿಷ್ಟರು.

ಅರ್ಜುನ ತನ್ನ ಬಂಧುಗಳನ್ನು, ಕುಟುಂಬದ ಸದಸ್ಯರ ಪಟ್ಟಿಯನ್ನು ಕೃಷ್ಣನ ಮುಂದೆ ಹೇಳಿಕೊಳ್ಳುತ್ತಾನೆ. ಗುರುಗಳು, ಪಿತೃಸಮಾನರು, ಮಕ್ಕಳು, ಅಜ್ಜಂದಿರು, ಮಾವಂದಿರು, ಹೆಣ್ಣು ಕೊಟ್ಟ ಮಾವಂದಿರು, ಮೊಮ್ಮಕ್ಕಳು, ಹೆಂಡತಿಯ ಅಣ್ಣ-ತಮ್ಮಂದಿರು ಮತ್ತು ನೆಂಟರಿಷ್ಟರು. ಹೀಗೆ ಕೇವಲ ತನ್ನ ಸಂಬಂಧಿಗಳ ಪಟ್ಟಿ ಕೊಡುತ್ತಿರುವ ಅರ್ಜುನ ತನ್ನ ಸಾಮಾಜಿಕ ಕರ್ತವ್ಯ ಮರೆತು ವೈಯಕ್ತಿಕವಾಗಿ ಮಾತನಾಡುತ್ತಿರುವುದು ಇಲ್ಲಿ ಸ್ಪಷ್ಟವಾಗುತ್ತದೆ.

ಏತಾನ್ ನ ಹಂತುಮಿಚ್ಛಾಮಿ ಘ್ನತೋಽಪಿ ಮಧುಸೂದನ ।
ಅಪಿ ತ್ರೈಲೋಕ್ಯರಾಜ್ಯಸ್ಯ ಹೇತೋಃ ಕಿಂ ನು ಮಹೀಕೃತೇ ॥೩೫॥

ಏತಾನ್ ನ ಹಂತುಮ್ ಇಚ್ಛಾಮಿ ಘ್ನತಃ ಅಪಿ ಮಧುಸೂದನ ।
ಅಪಿ ತ್ರೈಲೋಕ್ಯ ರಾಜ್ಯಸ್ಯ ಹೇತೋಃ ಕಿಮ್ ನು ಮಹೀಕೃತೇ -- ಓ ಮಧುಸೂದನಾ, ನನ್ನನ್ನು ಕೊಲ್ಲಬಂದರೂ ನಾನಿವರನ್ನು ಕೊಲ್ಲಬಯಸೆ. ಮೂರು ಲೋಕದ ದೊರೆತನಕ್ಕಾಗಿ ಕೂಡಾ. ಇನ್ನು ಭೂಮಿಯ ಮಾತೇನು?

ನನಗೆ ಇವರನ್ನು ಕೊಲ್ಲುವ ಬಯಕೆ ಇಲ್ಲ. ಒಂದು ವೇಳೆ ಅವರು ನನ್ನನ್ನು ಕೊಲ್ಲ ಬಂದರೂ ಕೂಡಾ ನಾನವರನ್ನು ಕೊಲ್ಲಲಾರೆ. ಇಡೀ ಬ್ರಹ್ಮಾಂಡದ ಒಡೆತನ ಸಿಗುತ್ತದೆ ಎಂದರೂ ಕೂಡಾ ನಾನು ಯುದ್ಧ ಮಾಡಲಾರೆ. ಅಂತಾದ್ದರಲ್ಲಿ ಈ ತುಂಡು ಭೂಮಿಗಾಗಿ ಏಕೆ ಯುದ್ಧ?
ಇಲ್ಲಿ ಅರ್ಜುನ ಶ್ರೀಕೃಷ್ಣನನ್ನು 'ಮಧುಸೂದನ' ಎಂದು ಸಂಬೋಧಿಸಿದ್ದಾನೆ. ಮಧು ಎಂದರೆ ಆನಂದ. ಮಧುಸೂದನ ಎಂದರೆ ಆನಂದ ನಾಶಕ. ಧರ್ಮ ಮಾರ್ಗವನ್ನು ಬಿಟ್ಟು, ಅಧರ್ಮಿಯಾಗಿ, ಮದ(ಅಹಂಕಾರ)ದಿಂದ ಸಾಗುವವರ ಆನಂದವನ್ನು ನಾಶ ಮಾಡಿ, ಸಜ್ಜನರ ಉದ್ಧಾರ ಮಾಡುವ ಆನಂದರೂಪಿ ಭಗವಂತ ಮಧುಸೂದನ. "ಸಾತ್ವಿಕರಿಗೆ ಆನಂದವನ್ನು ಕೊಟ್ಟು ತಾಮಸಿಗಳ ಆನಂದ ಹರಣ ಮಾಡುವ ನೀನು ಏನು ಮಾಡಲು ಬಂದವ?" ಎನ್ನುವ ಧ್ವನಿ ಈ ಸಂಬೋಧನೆಯಲ್ಲಿದೆ. ಇಲ್ಲಿ "ಯುದ್ಧ ಮಾಡಬೇಕೋ ಬೇಡವೋ ಎನ್ನುವ ಗೊಂದಲ ನನ್ನನ್ನು ಕಾಡುತ್ತಿದೆ" ಎಂದು ಅರ್ಜುನ ತನ್ನ ತುಮುಲವನ್ನು ಕೃಷ್ಣನಲ್ಲಿ ವ್ಯಕ್ತಪಡಿಸುತ್ತಾನೆ.

ನಿಹತ್ಯ ಧಾರ್ತರಾಷ್ಟ್ರಾನ್ ನಃ ಕಾ ಪ್ರೀತಿಃ ಸ್ಯಾಜ್ಜನಾರ್ದನ ।
ಪಾಪಮೇವಾಽಶ್ರಯೇದಸ್ಮಾನ್ ಹತ್ವೈತಾನಾತತಾಯಿನಃ ॥ ೩೬ ॥

ನಿಹತ್ಯ ಧಾರ್ತರಾಷ್ಟ್ರಾನ್ ನಃ ಕಾ ಪ್ರೀತಿಃ ಸ್ಯಾತ್ ಜನಾರ್ದನ।
ಪಾಪಮ್ ಏವ ಆಶ್ರಯೇತ್ ಅಸ್ಮಾನ್ ಹತ್ವಾ ಏತಾನ್ ಆತತಾಯಿನಃ -- ಧಾರ್ತರಾಷ್ಟ್ರರನ್ನು ಕೊಂದು ನಮಗಾದರೂ ಏನು ಸುಖವುಂಟು ಜನಾರ್ದನಾ? ಈ ಕುಲಗೇಡಿಗಳನ್ನು ಕೊಂದರೆ ನಮಗೆ ಪಾಪವೇ ತಟ್ಟೀತು.

ಒಂದು ವೇಳೆ ಧಾರ್ತರಾಷ್ಟ್ರರನ್ನು ಕೊಂದರೆ ನಮಗೆ ಆನಂದವೇನು? ಅದರಿಂದ ಸಾಯುವ ತನಕ ನಿರಂತರ ಪಾಪಪ್ರಜ್ಞೆ ನಮ್ಮನ್ನು ಕಾಡಬಹುದು. ಇವರನ್ನು ಕೊಂದು ಪಾಪಪ್ರಜ್ಞೆಯಿಂದ ಬದುಕಬೇಕೇ ಹೊರತು ಇನ್ನೇನೂ ಲಾಭವಿಲ್ಲ-ಇದು ಅರ್ಜುನನ ವಾದ.

ಈ ಶ್ಲೋಕದಲ್ಲಿ ಅರ್ಜುನ "ಆತತಾಯಿ" ಎನ್ನುವ ಪದವನ್ನು ಬಳಸಿದ್ದಾನೆ. ಆತತಾಯಿ ಎಂದರೆ ಇನ್ನೊಬ್ಬರ ಮನೆಗೆ ಬೆಂಕಿ ಹಾಕುವವ; ಇನ್ನೊಬ್ಬರ ಆಹಾರಕ್ಕೆ ವಿಷ ಬೆರೆಸಿ ಕೊಡುವವ; ಇನ್ನೊಬ್ಬರ ಆಸ್ತಿಯನ್ನು ಲಪಟಾಯಿಸುವವ; ಪರ ಸ್ತ್ರೀಯರ ಮೇಲೆ ಕೈ ಹಾಕುವವ ಇತ್ಯಾದಿ. ಶಾಸ್ತ್ರ 'ಆತತಾಯಿನರನ್ನು' ಕಂಡಲ್ಲಿ ಹೊಡೆದು ಸಾಯಿಸು ಎನ್ನುತ್ತದೆ. ಇಲ್ಲಿ ದುರ್ಯೋಧನ ಮೇಲಿನ ಎಲ್ಲಾ ಕೆಟ್ಟ ಕೆಲಸವನ್ನೂ ಮಾಡಿದ್ದ. ಭೀಮನಿಗೆ ವಿಷ ಸೇರಿಸಿ ಕೊಟ್ಟಿದ್ದ, ದ್ರೌಪದಿ ವಸ್ತ್ರಾಪಹರಣ ಮಾಡಿದ್ದ, ಪಾಂಡವರಿದ್ದ ಅರಗಿನ ಮನೆಗೆ ಬೆಂಕಿ ಇಟ್ಟಿದ್ದ. ಆದರೆ ಇಲ್ಲಿ ಅರ್ಜುನನಿಗೆ ಬಂಧು ಪ್ರೇಮ ಎಲ್ಲಿಯವರೆಗೆ ಕಾಡುತ್ತಿದೆ ಎಂದರೆ ಆತ "ಇವರೆಲ್ಲರೂ ಆತತಾಯಿನರಾದರೂ ಕೂಡಾ, ನನ್ನ ದೊಡ್ಡಪ್ಪನ ಮಕ್ಕಳಲ್ಲವೇ?" ಎಂದು ಕೃಷ್ಣನಲ್ಲಿ ಪರಿತಪಿಸುತ್ತಾನೆ.
ಈ ಶ್ಲೋಕದಲ್ಲಿ ಅರ್ಜುನ ಶ್ರೀಕೃಷ್ಣನನ್ನು 'ಜನಾರ್ದನ' ಎಂದು ಸಂಬೋಧಿಸಿದ್ದಾನೆ. ಜನಾರ್ದನ ಎಂದರೆ ದುರ್ಜನ ಸಂಹಾರಕ ಹಾಗೂ ಸಜ್ಜನರಿಗೆ ಮುಂದೆ ಹುಟ್ಟಿಲ್ಲದ ಮೋಕ್ಷಪ್ರದವಾದ ಸಾವನ್ನು ಕೊಡುವವ. "ಮೋಕ್ಷಪ್ರದನಾದ ನೀನು ಮತ್ತೆ ಪುನಃ ಈ ಹುಟ್ಟು-ಸಾವಿನ ಚಕ್ರದಲ್ಲಿ ಬರುವ ಈ ಯುದ್ಧದಲ್ಲಿ ನಮ್ಮನ್ನು ಏಕೆ ತೊಡಗಿಸುತ್ತಿರುವೆ? ಯುದ್ಧ ಎಂದೂ ಮೋಕ್ಷಪ್ರದವಲ್ಲ, ಅದು ಸೇಡು-ದ್ವೇಷದಿಂದ ಕೂಡಿರುತ್ತದೆ. ಹಾಗಿರುವಾಗ ಈ ಯುದ್ಧ ಏಕೆ?" ಎನ್ನುವುದು ಈ ಸಂಬೋಧನೆಯ ಹಿಂದಿರುವ ಧ್ವನಿ.

ತಸ್ಮಾನ್ನಾರ್ಹಾ ವಯಂ ಹಂತುಂ ಧಾರ್ತರಾಷ್ಟ್ರಾನ್ ಸ್ವಬಾಂಧವಾನ್ ।
ಸ್ವಜನಂ ಹಿ ಕಥಂ ಹತ್ವಾ ಸುಖಿನಃ ಸ್ಯಾಮ ಮಾಧವ ॥ ೩೭ ॥

ತಸ್ಮಾತ್ ನ ಅರ್ಹಾ ವಯಮ್ ಹಂತುಮ್ ಧಾರ್ತರಾಷ್ಟ್ರಾನ್ ಸ್ವ ಬಾಂಧವಾನ್।
ಸ್ವ ಜನಮ್ ಹಿ ಕಥಮ್ ಹತ್ವಾ ಸುಖಿನಃ ಸ್ಯಾಮ ಮಾಧವಾ-ಆದ್ದರಿಂದ ನಮ್ಮ ಅನುಬಂಧಿಗಳಾದ ಧಾರ್ತರಾಷ್ಟ್ರರನ್ನು ನಾವು ಕೊಲ್ಲುವುದು ತರವಲ್ಲ. ನಮ್ಮ ಮಂದಿಯನ್ನು ಕೊಂದು ನಾವು ಹೇಗೆ ಸುಖಿಗಳಾದೇವು ಮಾಧವಾ ?

ಧಾರ್ತರಾಷ್ಟ್ರರು ನಮ್ಮ ಸಹೋದರರು. ಅವರನ್ನು ಕೊಲ್ಲುವುದು ತರವಲ್ಲ. ನಮ್ಮ ಮಂದಿಯನ್ನೇ ನಾವು ಕೊಂದು ಹೇಗೆ ನಾವು ಸುಖಿಗಳಾದೇವು? ಇದು ಅರ್ಜುನನ ಪ್ರಶ್ನೆ. ಸೂಕ್ಷ್ಮವಾಗಿ ಗಮನಿಸಿದಾಗ ಇಲ್ಲಿ ಅರ್ಜುನ ತಾನು ಪ್ರಜಾಪಾಲಕ, ಧರ್ಮವನ್ನು ರಕ್ಷಿಸುವುದು ನನ್ನ ಕರ್ತವ್ಯ ಎನ್ನುವುದನ್ನು ಪೂರ್ಣ ಮರೆತು ಮಾತನಾಡುತ್ತಿರುವುದು ಸ್ಪಷ್ಟವಾಗಿ ಕಾಣುತ್ತದೆ.

ಇಲ್ಲಿ ಅರ್ಜುನ ಕೃಷ್ಣನನ್ನು 'ಮಾಧವ' ಎಂದು ಸಂಬೋಧಿಸುತ್ತಾನೆ. 'ಮಾ' ಅಂದರೆ ಮಾತೆ ಲಕ್ಷ್ಮಿ. ಆದ್ದರಿಂದ ಮಾಧವ ಅಂದರೆ ಲಕ್ಷ್ಮೀಪತಿ ಭಗವಂತ. ಇನ್ನು 'ಮಾ' ಅಂದರೆ ಜ್ಞಾನ ಕೂಡಾ ಹೌದು. ಭಗವಂತ ಜ್ಞಾನದ ಒಡೆಯ, ಆದ್ದರಿಂದ ಆತ ಮಾಧವ. ಶ್ರೀಕೃಷ್ಣ ಮಧುವಂಶದಲ್ಲಿ ಹುಟ್ಟಿ ಬಂದದ್ದರಿಂದ ಆತನನ್ನು ಮಾಧವ ಎಂದೂ ಕರೆಯುತ್ತಾರೆ. ವೇದದಲ್ಲಿ ಮಾತ್ರು ಎನ್ನುವ ಪದವನ್ನು ಮಾತು ಅಥವಾ ವಾಙ್ಮಯ ಎನ್ನುವ ಅರ್ಥದಲ್ಲಿ ಉಪಯೋಗಿಸಿದ್ದಾರೆ. ಸಮಸ್ತ ವೈದಿಕ ವಾಙ್ಮಯ ಪ್ರತಿಪಾದ್ಯನಾದ ಭಗವಂತ ಮಾಧವ. ಅರ್ಜುನ ಶ್ರೀಕೃಷ್ಣನನ್ನು ಈ ರೀತಿ ಸಂಬೋಧಿಸಲು ಕಾರಣವಿದೆ. ಕೃಷ್ಣ ಬರಿಯ ಸೋದರಮಾವನ ಮಗನಲ್ಲ, ಇನ್ನ್ಯಾವುದೋ ಅತಿಮಾನುಷ ಶಕ್ತಿ ಎನ್ನುವ ಎಚ್ಚರ ಆತನಲ್ಲಿತ್ತು. ಆ ಕಾರಣದಿಂದ ಆತ ಒಂದೊಂದು ಕಡೆ ಒಂದೊಂದು ರೀತಿ ಭಗವಂತನ ಆ ಅತಿಮಾನುಷ ಶಕ್ತಿಯನ್ನು ನೆನಪಿಸಿಕೊಂಡಿದ್ದಾನೆ. "ನೀನು ಈ ಜಗತ್ತಿನ ಆದಿಶಕ್ತಿಯೆಂದು ನನಗೆ ತಿಳಿದಿದೆ. ಆದರೂ ಕೂಡಾ ಈ ಒಡಂಬಡಿಕೆಯಲ್ಲಿ ಏಕೆ ಮೂಕ ಪ್ರೇಕ್ಷಕನಾಗಿ ಕುಳಿತಿದ್ದೀಯ"- ಎನ್ನುವುದು ಆತನ ಈ ಸಂಬೋಧನೆಯ ತಾತ್ಪರ್ಯ.

ಇದು ಎಷ್ಟು ವಿಚಿತ್ರ. ಭಗವಂತನ ಜೊತೆಗಿದ್ದು, ಕೃಷ್ಣನನ್ನು ಅತಿಮಾನುಷ ಶಕ್ತಿ ಎಂದು ತಿಳಿದ ಮಹಾಜ್ಞಾನಿ ಅರ್ಜುನ, ಪ್ರತೀ ಕ್ಷಣದಲ್ಲಿ ಗೊಂದಲಕ್ಕೊಳಗಾಗುತ್ತಾನೆ. ಹೀಗಿರುವಾಗ ನಮ್ಮ ನಿಮ್ಮ ಪಾಡೇನು? ಇದು ವಿಚಿತ್ರ ಮಾಯೆ. ಮಣ್ಣು ತಿಂದ ಶ್ರೀಕೃಷ್ಣನ ಬಾಯಿಯಲ್ಲಿ ಭಗವಂತನ ವಿಶ್ವರೂಪವನ್ನು ಕಂಡ ಮೇಲೂ ಯಶೋದೆ, ಕೃಷ್ಣನನ್ನು ಶಿಕ್ಷಿಸಲು ಮುಂದಾಗುತ್ತಾಳೆ. ಇದು 'ನನ್ನ ಮಗು' ಎನ್ನುವ ಮಮತೆಯ ಮಾಯೆಯಲ್ಲಿರುತ್ತಾಳೆ. ಇಲ್ಲಿ ಅರ್ಜುನನ ಸ್ಥಿತಿ ಕೂಡಾ ಇದೇ.

ಯದ್ಯಪ್ಯೇತೇ ನ ಪಶ್ಯಂತಿ ಲೋಭೋಪಹತಚೇತಸಃ ।
ಕುಲಕ್ಷಯಕೃತಂ ದೋಷಂ ಮಿತ್ರದ್ರೋಹೇ ಚ ಪಾತಕಮ್ ॥ ೩೮ ॥

ಯದಿ ಅಪಿ ಏತೇ ನ ಪಶ್ಯಂತಿ ಲೋಭ ಉಪಹತ ಚೇತಸಃ ।
ಕುಲಕ್ಷಯ ಕೃತಮ್ ದೋಷಮ್ ಮಿತ್ರದ್ರೋಹೇ ಚ ಪಾತಕಮ್- -ಇವರೆಲ್ಲರ ಹೃದಯ ಲೋಭದ ವಶವಾಗಿದೆ. ಕುಲದ ಅಳಿವಿನಿಂದಾಗುವ ಮತ್ತು ಮಿತ್ರ ದ್ರೋಹದಿಂದಾಗುವ ಪಾತಕವನ್ನು ಇವರು ಕಾಣುತ್ತಿಲ್ಲ.

ದುಡ್ಡಿನ ಆಸೆಯಿಂದ, ಲೋಭದಿಂದ ಕುರುಡಾಗಿ ಅವರ ಮನಸ್ಸು ಯೋಚಿಸುವ ಶಕ್ತಿಯನ್ನು ಕಳೆದುಕೊಂಡಿದೆ. ಇದರಿಂದ ಕುಲಕ್ಷಯವಾಗುತ್ತದೆ. ಇಡೀ ಭರತವಂಶ ನಿರ್ವಂಶವಾಗುತ್ತದೆ. ಬಂಧುಗಳಾದ ನಾವು ಒಬ್ಬರಿಗೊಬ್ಬರು ಮಿತ್ರರಂತೆ ಆತ್ಮೀಯತೆಯಿಂದ ಬದುಕಬೇಕಿತ್ತು. ಆದರೆ ಒಬ್ಬರನೊಬ್ಬರು ದ್ವೇಷಿಸುತ್ತಿದ್ದೇವೆ. ಇದು ದ್ರೋಹ.

ಇಲ್ಲಿ 'ಮಿತ್ರ' ಎನ್ನುವ ಪದ ಬಳಕೆಯಾಗಿದೆ. ಯಾರು ನಿಜವಾದ ಮಿತ್ರ? ನಮಗೆ ಯಾವಾಗ ಆಪತ್ತು ಬಂದೀತು ಎಂದು ನಮಗಿಂತ ಮೊದಲೇ ಊಹಿಸಿ, ಪೂರ್ವಭಾವಿಯಾಗಿ ಯಾವುದೇ ಪ್ರತಿಫಲವನ್ನು ಅಪೇಕ್ಷಿಸದೇ, ಜೀವಕ್ಕೆ ಜೀವ ಕೊಡುವವನು 'ಮಿತ್ರ'.

ಕಥಂ ನ ಜ್ಞೇಯಮಸ್ಮಾಭಿಃ ಪಾಪಾದಸ್ಮಾನ್ನಿವರ್ತಿತುಮ್ ।
ಕುಲಕ್ಷಯಕೃತಂ ದೋಷಂ ಪ್ರಪಶ್ಯದ್ಭಿರ್ಜನಾರ್ದನ ॥ ೩೯ ॥

ಕಥಮ್ ನ ಜ್ಞೇಯಮ್ ಅಸ್ಮಾಭಿಃ ಪಾಪಾತ್ ಅಸ್ಮಾತ್ ನಿವರ್ತಿತುಮ್ ।
ಕುಲಕ್ಷಯ ಕೃತಮ್ ದೋಷಮ್ ಪ್ರಪಶ್ಯದ್ಭಿ ಜನಾರ್ದನ- ಓ ಜನಾರ್ದನಾ, ಕುಲದ ಅಳಿವಿನಿಂದಾಗುವ ಕೇಡನ್ನು ಮುಂಗಾಣಬಲ್ಲ ನಾವು ಇಂತಹ ತಪ್ಪಿನಿಂದ ದೂರವಿರಬೇಕು ಎಂದರಿಯದಿದ್ದರೆ ಹೇಗೆ?

ಇಂತಹ ಮಹಾಪಾಪವನ್ನು ಮಾಡಬಾರದು ಎಂದು ನಾವು ತಿಳಿದುಕೊಳ್ಳದಿದ್ದರೆ, ದುರ್ಯೋಧನನಿಗೂ ನಮಗೂ ಇರುವ ವ್ಯತ್ಯಾಸವಾದರೂ ಏನು? ಹುಟ್ಟು ಸಾವುಗಳ ಬಂಧದಿಂದ ಪಾರುಮಾಡುವ ಓ ಜನಾರ್ದನನೇ, ಒಂದು ಕುಲವನ್ನು ನಾಶ ಮಾಡುವಂತಹ ದೋಷ ಸ್ಪಷ್ಟವಾಗಿ ನನ್ನ ಕಣ್ಣಿಗೆ ಕಾಣುತ್ತಿದೆ. ಯುದ್ಧೋತ್ತರ ಭಾರತದ ಚಿತ್ರ ನನ್ನ ಕಣ್ಣಿಗೆ ಕಟ್ಟುತ್ತಿದೆ. ಯುದ್ಧದಿಂದಾಗುವ ಅನಿಷ್ಟ ಗೊತ್ತಿದ್ದೂ ಕೂಡಾ, ಯುದ್ಧಕ್ಕೆ ಕಾಲು ಕೆದಕುವ ಬುದ್ಧಿಯನ್ನು ನಾವು ತೋರಿಸಿದರೆ ದುರ್ಯೋಧನನಂತೆ ನಾವು ಕೀಳು ಮಟ್ಟಕ್ಕಿಳಿದಂತಾಗುವುದಿಲ್ಲವೇ? ಇದು ಅರ್ಜುನನ ಪ್ರಶ್ನೆ.

ಕುಲಕ್ಷಯೇ ಪ್ರಣಶ್ಯಂತಿ ಕುಲಧರ್ಮಾಃ ಸನಾತನಾಃ ।
ಧರ್ಮೇ ನಷ್ಟೇ ಕುಲಂ ಕೃತ್ಸ್ನಮಧರ್ಮೋಽಭಿಭವತ್ಯುತ ॥ ೪೦ ॥

ಕುಲಕ್ಷಯೇ ಪ್ರಣಶ್ಯಂತಿ ಕುಲ ಧರ್ಮಾಃ ಸನಾತನಾಃ ।
ಧರ್ಮೇ ನಷ್ಟೇ ಕುಲಮ್ ಕೃತ್ಸ್ನಮ್ ಅಧರ್ಮಃ ಅಭಿಭವತಿ ಉತ -- ಕುಲ ಕುಸಿದಾಗ ಅಳಿವಿರದ ಕುಲಧರ್ಮಗಳು ಕಣ್ಮರೆಯಾಗುತ್ತವೆ. ಧರ್ಮ ಮರೆಯಾದರೆ ಇಡಿಯ ಕುಲವನ್ನು ಅಧರ್ಮ ಆಕ್ರಮಿಸಿಬಿಡುತ್ತದೆ.

ಯುದ್ಧದಿಂದಾಗುವ ದೊಡ್ಡ ಸಮಸ್ಯೆ ಎಂದರೆ "ಕುಲಧರ್ಮ" ನಾಶ. ಈ ಶ್ಲೋಕದಲ್ಲಿ ಅರ್ಜುನ ಧರ್ಮದ ಕುರಿತಾದ ಕೆಲವು ಪದಗಳನ್ನು ಬಳಸುತ್ತಾನೆ. ಜಾತಿಧರ್ಮ, ಕುಲಧರ್ಮ, ಸನಾತನಧರ್ಮ ಇತ್ಯಾದಿ ಶಬ್ದಗಳು ಅರ್ಥವಾಗಬೇಕಾದರೆ ಮೊದಲು ನಾವು ಧರ್ಮ ಅಂದರೆ ಏನು? ಅದರಲ್ಲಿ ಎಷ್ಟು ವಿಧ? ಎನ್ನುವುದನ್ನು ತಿಳಿದುಕೊಳ್ಳಬೇಕು.

ಸಾಮಾನ್ಯವಾಗಿ ಜಾತಿಧರ್ಮ ಎಂದಾಗ ನಮಗೆ ಕಾಣುವುದು ಬ್ರಾಹ್ಮಣ-ಕ್ಷತ್ರಿಯ-ವೈಶ್ಯ-ಶೂದ್ರ ಎನ್ನುವ ಜಾತಿ. ಇನ್ನು ಕುಲಧರ್ಮ ಎಂದಾಗ ಒಂದು ಮನೆತನದ ಮೂಲ ಕೆಲಸ. ಬಡಗಿ, ಕಮ್ಮಾರ, ಚಮ್ಮಾರ ಇತ್ಯಾದಿ. ಆದರೆ ಇಲ್ಲಿ ಹೇಳುವುದು ಇದನ್ನಲ್ಲ. ಕುಲಧರ್ಮ ಎಂದರೆ ಸಮಾಜಧರ್ಮ(**Religion of Society**); ಜಾತಿಧರ್ಮ

ಎಂದರೆ ಹುಟ್ಟುಗುಣದಿಂದ ಬಂದ ಮನುಷ್ಯನ ಸಹಜ ವೈಯಕ್ತಿಕ ಧರ್ಮ. ಈ ಎರಡು ಧರ್ಮದ ಆಚೆಗೆ ಸನಾತನಧರ್ಮ. ಅದು ಶಾಶ್ವತಧರ್ಮ. ಎಲ್ಲಾ ಕಾಲದಲ್ಲೂ, ಎಲ್ಲಾ ದೇಶದಲ್ಲೂ ಸನಾತನಧರ್ಮ ಬದಲಾಗದು. ವ್ಯಕ್ತಿಧರ್ಮ ವ್ಯಕ್ತಿಗಳ ನಡುವೆ ಬದಲಾಗುತ್ತದೆ. ಸಮಾಜಧರ್ಮ ಕಾಲಕ್ಕನುಗುಣವಾಗಿ, ದೇಶಕ್ಕನುಗುಣವಾಗಿ ಬದಲಾಗುತ್ತದೆ.

ಜಾತಿಧರ್ಮ ಎಂದರೆ ನಮ್ಮ ಸಹಜವಾದ ಹುಟ್ಟುಗುಣ (ಸ್ವಭಾವ). ಪ್ರತಿಯೊಂದು ಜೀವಕ್ಕೂ ಅದರದ್ದೇ ಆದ ಸ್ವಭಾವವಿದೆ, ಆದರೆ ಪತ್ತೆ ಹಚ್ಚುವುದು ಕಷ್ಟ. ಏಕೆಂದರೆ ಅದರ ಮೇಲಿರುವ ಎರಡು ಆವರಣ. ಒಂದು ಅನುವಂಶೀಯ ಹಾಗೂ ಇನ್ನೊಂದು ಬೆಳೆದ ವಾತಾವರಣದ ಪ್ರಭಾವ. ಪರಿಸರದ ಶಿಶುವಾದ ಮಾನವ ಅನುವಂಶೀಯವಾಗಿ ಹರಿದುಬರುವ ಗುಣಗಳು ಹಾಗೂ ಪರಿಸರದ ಪ್ರಭಾವದಲ್ಲಿ ಬದುಕುತ್ತಾನೆ. ಇವು ನೈಜ ಸ್ವಭಾವವನ್ನು ಮುಚ್ಚಿಬಿಡುತ್ತವೆ.

ಸಮಾಜಧರ್ಮ: ನಾವು ಇನ್ನೊಬ್ಬರ ನೆರವಿಲ್ಲದೆ ಏಕಾಂಗಿಯಾಗಿ ಬದುಕುವವರಲ್ಲ. ಆದ್ದರಿಂದ ಸಂಘಟನೆಗೆ ಒಂದು ಪ್ರತ್ಯೇಕಧರ್ಮ. ವ್ಯಕ್ತಿ ಧರ್ಮವನ್ನು(ವೈಯಕ್ತಿಕ ಅಭಿರುಚಿಯನ್ನು) ಸಮಾಜಧರ್ಮಕ್ಕೋಸ್ಕರ ಬದಲಿಸಿಕೊಳ್ಳಬೇಕಾಗುತ್ತದೆ(ಉದಾಹರಣೆಗೆ: ಜೋರಾಗಿ ಮಾತನಾಡುವುದು ನನ್ನ ವೈಯಕ್ತಿಕಧರ್ಮ. ಆದರೆ ಆಸ್ಪತ್ರೆಯಲ್ಲಿ ನಿಶ್ಯಬ್ಧ ಕಾಪಾಡುವುದು ಸಮಾಜಧರ್ಮ). ಸಮಾಜಧರ್ಮ ಸಮಾಜ ಬದಲಾದಂತೆ, ಸಮಾಜಕ್ಕನುಗುಣವಾಗಿ ಬದಲಾಗುತ್ತದೆ. ಉದಾಹರಣೆಗೆ ವಿವಾಹಧರ್ಮ. ಇಂತಹ ವಯಸ್ಸಿಗೆ ಮದುವೆಯಾಗಬೇಕು ಎನ್ನುವುದು ಕಾಲಕ್ಕನುಗುಣವಾಗಿ ಬದಲಾಗುತ್ತದೆ. ವೇದಕಾಲದಲ್ಲಿ ಹೆಣ್ಣು ಮಕ್ಕಳ ಬಾಲ್ಯವಿವಾಹ ಪದ್ಧತಿ ಜಾರಿಯಲ್ಲಿತ್ತು. ಕಾರಣವೇನೆಂದರೆ ಆಗ ಗುರುಕುಲ ಪದ್ಧತಿ ಇದ್ದು ಗಂಡುಮಕ್ಕಳು ತಮ್ಮ ಎಂಟನೇ ವಯಸ್ಸಿನಿಂದ ಇಪ್ಪತ್ತನೇ ವಯಸ್ಸಿನ ತನಕ ಗುರುಕುಲದಲ್ಲಿ ವಿಧ್ಯಾಭ್ಯಾಸ ಮಾಡಿ ನಂತರ ಮನೆಗೆ ಹಿಂತಿರುಗುತ್ತಿದ್ದರು(ಇದನ್ನು ಸಮಾವರ್ತನ ಎನ್ನುತ್ತಾರೆ). ಹಾಗೆ ಕಲಿತು ಬಂದ ಹುಡುಗನಿಗೆ ಎಂಟು ವರ್ಷದ ಹೆಣ್ಣನ್ನು ಮದುವೆ ಮಾಡಿಸುತ್ತಿದ್ದರು. ಆಕೆ ಆತನ ಶಿಷ್ಯೆಯಾಗಿ ವಿಧ್ಯಾಭಾಸ ಕಲಿತು ವಯಸ್ಸಿಗೆ ಬಂದನಂತರ ಸಂಸಾರ ಮಾಡುತ್ತಿದ್ದಳು. ಇದರಿಂದ ಆಕೆಗೆ ಗಂಡನನ್ನು ಅರಿಯುವ, ಗಂಡನ ಮನೆಯ ವಾತಾವರಣಕ್ಕೆ ಹೊಂದಿಕೊಳ್ಳುವ ಗುಣ ಬರುತ್ತಿತ್ತು. ಕ್ರಮೇಣ ಗುರುಕುಲ ಪದ್ಧತಿ ಕೊನೆಗೊಂಡಾಗ, ಈ ಬಾಲ್ಯವಿವಾಹ ಕೂಡಾ ಕೊನೆಗೊಂಡಿತು. ರಾಮಾಯಣ ಮಹಾಭಾರತ ಕಾಲದಲ್ಲಿ ಬಾಲ್ಯವಿವಾಹ ಇರಲಿಲ್ಲ. ನಂತರ ಇತ್ತೀಚೆಗೆ ಸುಮಾರು ಒಂದು ಸಾವಿರ ವರ್ಷದ ಹಿಂದೆ ವಿದೇಶಿ ಆಕ್ರಮಣವಾದಾಗ ಹೆಣ್ಣು ಮಕ್ಕಳನ್ನು ಶಾಲೆಗೆ ಕಳುಹಿಸದೇ ಬೇಗ ಮದುವೆ ಮಾಡಿಸಲಾರಂಭಿಸಿದರು. ಇದು ಸಾಮಾಜಿಕ ಒತ್ತಡದಿಂದ ಆದ ಬದಲಾವಣೆ. ಹೀಗೆ ಸಮಾಜಧರ್ಮ ಸಮಯಕ್ಕನುಗುಣವಾಗಿ, ಸಮಾಜಕ್ಕನುಗುಣವಾಗಿ ಬದಲಾಗುತ್ತದೆ.

ಸನಾತನಧರ್ಮ: ಇದು ಎಲ್ಲಾ ಕಾಲದಲ್ಲೂ, ಎಲ್ಲಾ ಸ್ಥಿತಿಯಲ್ಲೂ ಎಂದೂ ಬದಲಾಗದ ಧರ್ಮ. ವೇದ ಹೇಳುವುದು ಸನಾತನ ಧರ್ಮವನ್ನು. ಉದಾಹರಣೆಗೆ: ಪ್ರಾಮಾಣಿಕವಾಗಿ ಬದುಕಬೇಕು, ಇನ್ನೊಬ್ಬರ ಸೊತ್ತನ್ನು ಕದಿಯಬಾರದು, ಸತ್ಯವನ್ನು ಹೇಳಬೇಕು, ದೇವರನ್ನು ನಂಬಿ ನಡೆಯಬೇಕು, ಇತ್ಯಾದಿ. ಇದು ಶಾಶ್ವತ ಧರ್ಮ. ಎಲ್ಲಾ ದೇಶ-ಕಾಲದಲ್ಲೂ ಬದಲಾಗದ ಧರ್ಮ.

ಸನಾತನ ಧರ್ಮಕ್ಕನುಗುಣವಾಗಿ ಸಾಮಾಜಿಕ ಧರ್ಮವನ್ನು ಹೊಂದಿಸಿಕೊಳ್ಳಬೇಕು. ಜಾತಿಧರ್ಮವನ್ನು ಸಮಾಜಧರ್ಮಕ್ಕನುಗುಣವಾಗಿ ಹೊಂದಿಸಿಕೊಳ್ಳಬೇಕು. ಒಂದು ವಸ್ತುವಿನ ಅಸಾಧಾರಣ ಗುಣ(**Quality**)

ಅದರ ಧರ್ಮ. ಉದಾಹರಣೆಗೆ: ನೋಡುವುದು ಕಣ್ಣಿನ ಧರ್ಮ, ಕೇಳುವುದು ಕಿವಿಯ ಧರ್ಮ. ಆದರೆ ಯಾವುದು ಧರ್ಮವೋ ಅದೇ ಅಧರ್ಮವಾಗಬಹುದು. ನೋಡಬಾರದ್ದನ್ನು ನೋಡುವುದು ಅಧರ್ಮ! ನೋಡುವುದಕ್ಕೆ ಒಂದು ಸೀಮೆ ಇದೆ. ಅದನ್ನು ದಾಟಿದಾಗ ಧರ್ಮವೇ ಅಧರ್ಮವಾಗುತ್ತದೆ.

ಇಲ್ಲಿ ಅರ್ಜುನ ಹೇಳುತ್ತಾನೆ: "ಕುಲಕ್ಷಯವಾದಾಗ ಸಮಾಜ ಧರ್ಮವನ್ನು ನಡೆಸಬೇಕಾದ ನ್ಯಾಯಾಂಗ ವ್ಯವಸ್ಥೆ ನಾಶವಾಗಿ ಸಮಾಜ ಧರ್ಮ ನಾಶವಾಗುತ್ತದೆ. ಸಾಮಾಜಿಕ ವ್ಯವಸ್ತೆ ಕುಸಿದು ಬೀಳುತ್ತದೆ. ಇಡೀ ಸಮಾಜ ಅಧರ್ಮದಲ್ಲಿ ಮುಳುಗುತ್ತದೆ. ಇದು ಯುದ್ಧ ಮಾಡುವುದರಿಂದ ಸಮಾಜಕ್ಕೆ ನಾವು ಕೊಡುವ ಕಾಣಿಕೆ" ಎಂದು.

ಅಧರ್ಮಾಭಿಭವಾತ್ ಕೃಷ್ಣ ಪ್ರದುಷ್ಯಂತಿ ಕುಲಸ್ತ್ರಿಯಃ ।
ಸ್ತ್ರೀಷು ದುಷ್ಟಾಸು ವಾರ್ಷ್ಣೇಯ ಜಾಯತೇ ವರ್ಣಸಂಕರಃ ॥೪೧॥

ಅಧರ್ಮ ಅಭಿಭವಾತ್ ಕೃಷ್ಣ ಪ್ರದುಷ್ಯಂತಿ ಕುಲಸ್ತ್ರಿಯಃ
ಸ್ತ್ರೀಷು ದುಷ್ಟಾಸು ವಾರ್ಷ್ಣೇಯ ಜಾಯತೇ ವರ್ಣಸಂಕರಃ -ಓ ವಾರ್ಷ್ಣೇಯಾ, ಅಧರ್ಮದ ಆಕ್ರಮಣದಿಂದ ಸಮಾಜದಲ್ಲಿ ಹೆಣ್ಣು ಮಕ್ಕಳು ದಾರಿಗೆಡುತ್ತಾರೆ. ಅದರಿಂದ ಸಮಾಜ ವರ್ಣಸಂಕರಕ್ಕೀಡಾಗುತ್ತದೆ.

ಯುದ್ಧವಾದರೆ ಅದರಿಂದ ಯುವಕರೆಲ್ಲರೂ ಸಾಯುತ್ತಾರೆ. ಅಧರ್ಮ ಸಮಾಜವನ್ನು ಆಕ್ರಮಿಸುತ್ತದೆ. ಯುವಕರಿಲ್ಲದ ಸಮಾಜ ಸೃಷ್ಟಿಯಾಗುತ್ತದೆ. ಸಾಮಾಜಿಕವಾಗಿ ಸ್ತ್ರೀಗೆ ಭದ್ರತೆ ಇಲ್ಲದಂತಾಗುತ್ತದೆ. ಅದರ ಪರಿಣಾಮ ಆಕೆಯ ಮುಗ್ಧತೆಯ ದುರುಪಯೋಗ. ಅದರಿಂದ ಸಮಾಜದಲ್ಲಿ ವರ್ಣಸಂಕರ ಉಂಟಾಗುತ್ತದೆ ಎನ್ನುತ್ತಾನೆ ಅರ್ಜುನ.
ಇಲ್ಲಿ ವರ್ಣಸಂಕರ ಎಂದರೆ ಜೀವದ ಬಣ್ಣ ಅಥವಾ ಸ್ವಭಾವ ಹಾಳಾಗುವುದು. ಹೆಣ್ಣಿಗೆ ಬಲವಂತವಾಗಿ ಆಕೆಯ ಮನಸ್ಸಿಗೆ ವಿರುದ್ಧವಾಗಿ ಉಚ್ಚ ಶಿಕ್ಷಣ ಕೊಡಬಾರದು ಎಂದು ಶಾಸ್ತ್ರಗಳಲ್ಲಿ ಉಲ್ಲೇಖವಿದೆ. ಕಾರಣ ಅದರಿಂದ ಆಕೆಯ ಗರ್ಭಕೋಶದ ಮೇಲೆ ಪರಿಣಾಮವಾಗುತ್ತದೆ. ಅದರ ಪರಿಣಾಮ ಹುಟ್ಟುವ ಮಗುವಿನ ಮೇಲೆ ಆಗುತ್ತದೆ. ಹೆಣ್ಣು ತನಗಿಷ್ಟವಿಲ್ಲದೇ ತನ್ನನ್ನು ತೊಡಗಿಸಿಕೊಂಡಾಗ; ಅನೇಕ ಪುರುಷರ ಸಂಗ ಮಾಡುವುದರಿಂದ; ಮುಂದಿನ ಸಂತಾನದ ಮೇಲೆ ಘೋರ ಪರಿಣಾಮವುಂಟಾಗುತ್ತದೆ. ಯಾರ ಮಾತನ್ನೂ ಕೇಳದ, ಯಾರ ನಿಯಮಕ್ಕೂ ಬಗ್ಗದ ವಿಕ್ಷಿಪ್ತ ಸಂತತಿ ಹುಟ್ಟುವ ಸಾಧ್ಯತೆ ಇದೆ. ಇದು ಇಲ್ಲಿ ಅರ್ಜುನ ಹೇಳುತ್ತಿರುವ ವರ್ಣಸಂಕರ.
ಇಲ್ಲಿ ಅರ್ಜುನ ಕೃಷ್ಣನನ್ನು 'ವಾರ್ಷ್ಣೇಯ' ಎಂದು ಸಂಬೋಧಿಸಿದ್ದಾನೆ. ಯಾದವ ಮನೆತನದ ಹಿರಿಯ ರಾಜ ವೃಷ್ಣಿ. ಆ ವಂಶದಲ್ಲಿ ಅವತರಿಸಿದ ಕೃಷ್ಣ ವಾರ್ಷ್ಣೇಯ. ಈ ಹೆಸರಿನ ಬಗ್ಗೆ ವೇದದಲ್ಲಿ ಉಲ್ಲೇಖವಿದೆ. ಬಯಸಿದ ಅಭೀಷ್ಟವನ್ನು ಕೊಡುವ ಹಿರಿಯ ಶಕ್ತಿಗಳಾದ ದೇವತೆಗಳ ಒಡೆಯ ಭಗವಂತ ವಾರ್ಷ್ಣೇಯ. "ಎಲ್ಲರ ಅಭೀಷ್ಟವನ್ನು ಈಡೇರಿಸುವ, ಧರ್ಮ ಸಂಸ್ಥಾಪನೆಗಾಗಿ ಇಳಿದುಬಂದ ನೀನು, ಏಕೆ ಈ ಯುದ್ಧವನ್ನು ತಡೆಯುತ್ತಿಲ್ಲ" ಎನ್ನುವ ಧ್ವನಿ ಅರ್ಜುನನ ಈ ಸಂಬೋಧನೆಯಲ್ಲಿದೆ.

ಸಂಕರೋ ನರಕಾಯೈವ ಕುಲಘ್ನಾನಾಂ ಕುಲಸ್ಯ ಚ ।
ಪತಂತಿ ಪಿತರೋ ಹ್ಯೇಷಾಂ ಲುಪ್ತಪಿಂಡೋದಕಕ್ರಿಯಾಃ ॥೪೨॥

ಸಂಕರಃ ನರಕಾಯ ಏವ ಕುಲಘ್ನಾನಾಮ್ ಕುಲಸ್ಯ ಚ|
ಪತಂತಿ ಪಿತರಃ ಹಿ ಏಷಾಮ್ ಲುಪ್ತ ಪಿಂಡ ಉದಕ ಕ್ರಿಯಾಃ -ಬಣ್ಣಗೇಡು ಕುಲಗೇಡಿಗಳನ್ನೂ, ಕುಲವನ್ನೂ ನರಕಕ್ಕೆ ತಳ್ಳುತ್ತದೆ. ಇಂಥವರ ಪೂರ್ವಜರು ಪಿಂಡ-ತರ್ಪಣಗಳಿಲ್ಲದೇ ನರಳುತ್ತಾರೆ.

ವಿಕ್ಷಿಪ್ತ ಮನಸ್ಸಿನ ಮಕ್ಕಳು ಹುಟ್ಟುವುದರಿಂದ, ಇಡೀ ಸಮಾಜ ನರಕಕ್ಕೆ ಹೋಗಬೇಕಾಗುತ್ತದೆ. ಹಾಗೂ ಅದಕ್ಕೆ ಕಾರಣರಾದ ನಾವೂ ಕೂಡಾ ನರಕಕ್ಕೆ ಹೋಗಬೇಕಾಗುತ್ತದೆ. ಸಮಾಜ ಈ ರೀತಿ ಸಂಕೀರ್ಣವಾದಾಗ, ಎಲ್ಲಾ ನಂಬಿಕಯನ್ನು ಕಳೆದುಕೊಂಡಾಗ, ಪಿತೃಗಳು ಪಿಂಡ ಇಲ್ಲದೆ ನರಕದಲ್ಲಿ ಬೀಳುತ್ತಾರೆ ಎನ್ನುವುದು ಅರ್ಜುನನ ಯುದ್ಧೋತ್ತರ ಪರಿಣಾಮದ ಭೀಕರತೆಯ ಪರಿಕಲ್ಪನೆ.
ಇಲ್ಲಿ ಪಿಂಡ ಅಂದರೆ ಏನು? ಅದರ ಮಹತ್ವ ಏನು? ಅದು ಯಾರಿಗೆ ಹೋಗಿ ಹೇಗೆ ಸೇರುತ್ತದೆ ಎನ್ನುವುದನ್ನು ನಾವು ಅರ್ಥ ಮಾಡಿಕೊಳ್ಳೋಣ. ನಾವು ಹಾಕುವ ಸ್ಥೂಲವಾದ ಪಿಂಡ ಸತ್ತ ಜೀವಕ್ಕೆ ನೇರವಾಗಿ ಹೋಗಿ ಸೇರುವುದಿಲ್ಲ. ಸತ್ತ ನಂತರ ಸೂಕ್ಷ್ಮ ಜೀವದಲ್ಲಿ ಇರುವ ಜೀವಕ್ಕೆ ಸ್ಥೂಲವಾದ ಪಿಂಡ ಬೇಕಿಲ್ಲ. ಜೀವ ತನ್ನ ಕರ್ಮಾನುಸಾರ ತಾನು ಹೋಗಬೇಕಾದಲ್ಲಿಗೆ ಹೋಗುತ್ತದೆ. ನಾವು ಪಿಂಡ ಹಾಕುವುದು ಪಿತೃದೇವತೆಗಳಿಗೆ. ಇದೊಂದು ದೇವತಾಗಣ. ಅದರಲ್ಲಿ ಒಟ್ಟು ನೂರು ದೇವತೆಗಳು. ಅವರಲ್ಲಿ ಮೂರು ಪ್ರಧಾನ`ಪಿತೃಗಳು . ಜೀವಿತ ಕಾಲದಲ್ಲಿ ತತ್ತ್ವಾಭಿಮಾನಿ ದೇವತೆಗಳನ್ನು ಹೇಗೆ ಪೂಜಿಸುತ್ತೇವೋ ಹಾಗೇ ಸತ್ತ ನಂತರ, ಈ ಸ್ಥೂಲಶರೀರದಿಂದ ಈಚೆ ಬಂದ ಮೇಲೆ, ಜೀವವನ್ನು ರಕ್ಷಿಸುವ ದೇವತಾಗಣ-ಪಿತೃಗಣ. ಈ ಪಿತೃಗಳನ್ನು ನಿಯಂತ್ರಿಸುವವರು ವಸು-ರುದ್ರ-ಆದಿತ್ಯರು. ಈ ಪಿತೃ ದೇವತೆಗಳನ್ನು ನಮ್ಮ ಪೂರ್ವಜರು ತೀರಿಕೊಂಡ ವಾರ್ಷಿಕ ದಿನದಂದು ಆರಾಧಿಸುವುದು ಸಂಪ್ರದಾಯ. ಇಲ್ಲಿ ಪಿತೃಗಳಿಗೆ ಪಿಂಡ ಪ್ರಧಾನ ಮಾಡುವ ಕಾರಣ ಏನೆಂದರೆ, ಒಂದು ವೇಳೆ ಕಾರಣ ವಿಶೇಷದಿಂದ ನಮ್ಮ ಹಿರಿಯರಿಗೆ ಅವರ ದಾರಿಯಲ್ಲಿ ಬಾಧಕವಾಗಿದ್ದರೆ, ಅದನ್ನು ಪರಿಹರಿಸಿ ಎನ್ನುವ ಪ್ರಾರ್ಥನೆಯೇ ಪಿಂಡ ಪ್ರಧಾನ. "ಪ್ರಾರಾಬ್ಧ ಕರ್ಮದಿಂದ ಅವರನ್ನು ಕಾಪಾಡಿ" ಎನ್ನುವ ಪಿತೃ-ದೇವತೆಗಳ ಪೂಜೆ. ಇನ್ನು ಕಾಗೆ ಮುಟ್ಟುವುದು ಎಂದರೆ ಪಿತೃ ದೇವತೆಗಳು ನಮ್ಮ ಪೂಜೆಯನ್ನು ಸ್ವೀಕರಿಸಿದ ಶಕುನ ಸಂಕೇತ.

ದೋಷೈರೇತೈಃ ಕುಲಘ್ನಾನಾಂ ವರ್ಣಸಂಕರಕಾರಕೈಃ ।
ಉತ್ಸಾದ್ಯಂತೇ ಜಾತಿಧರ್ಮಾಃ ಕುಲಧರ್ಮಾಶ್ಚ ಶಾಶ್ವತಾಃ ॥೪೩॥

ದೋಷೈ ಏತೈಃ ಕುಲಘ್ನಾನಾಮ್ ವರ್ಣಸಂಕರ ಕಾರಕೈಃ|
ಉತ್ಸಾದ್ಯಂತೇ ಜಾತಿಧರ್ಮಾಃ ಕುಲಧರ್ಮಾಃ ಚ ಶಾಶ್ವತಾಃ -ಸಮಾಜದ ಬಣ್ಣಗೇಡಿಗೆ ಕಾರಣರಾದ ಕುಲಗೇಡಿಗಳ ಇಂತಹ ತಪ್ಪುಗಳಿಂದ ಸಹಜ ಧರ್ಮಗಳು ಮತ್ತು ಅಳಿವಿರದ ಕುಲಧರ್ಮಗಳು ನೆಲೆಗೆಡುತ್ತವೆ.

ಯುದ್ಧದಿಂದ ಸಮಾಜದ ಮೇಲೆ ಆಗುವ ನೇರ ಪರಿಣಾಮ ಎಂದರೆ- ನಾಯಕರಿಲ್ಲದ, ಯುವಕರಿಲ್ಲದ ಸಮಾಜ. ಗಂಡು-ಹೆಣ್ಣಿನ ಅನುಪಾತ ವ್ಯತ್ಯಾಸ. ಇದು ಸರಿ ಹೊಂದಬೇಕಾದರೆ ಅದೆಷ್ಟು ವರ್ಷಗಳು ಬೇಕು? ನಾವು ಮಹಾಭಾರತ ಯುದ್ಧವನ್ನು ನೋಡಿದರೆ ಅಲ್ಲಿ ಕನಿಷ್ಠ ಐವತ್ತು ಲಕ್ಷ ಮಂದಿ ಜನ ಸತ್ತಿದ್ದಾರೆ. ಇಂತಹ

ಮಹಾಯುದ್ಧದಿಂದ ಇಡೀ ಸಮಾಜ ನಾಶಮಾಡಿದ ಕುಲಕಂಟಕರು ನಾವಾಗುತ್ತೇವೆ ಎನ್ನುವುದು ಅರ್ಜುನನ ಕಳಕಳಿ. "ಸಮಾಜದ ವ್ಯವಸ್ಥೆ ನಾಶವಾಗುವುದರಿಂದ ಸ್ವಭಾವ ನಾಶವಾಗುತ್ತದೆ. ಇದರಿಂದ ಆಯಾ ಜೀವದ ಸ್ವಭಾವದ ಅಭಿವೃದ್ಧಿ ಆಗದೇ, ವ್ಯಕ್ತಿತ್ವ ವಿಕಸನ ನಾಶವಾಗುತ್ತದೆ. ಶಾಶ್ವತ ಮೌಲ್ಯದ ಸಮಾಜಧರ್ಮ ನಾಶವಾಗುತ್ತದೆ. ಅನಾದಿ ಕಾಲದಿಂದ ಸಮಾಜ ಒಪ್ಪಿಕೊಂಡು ಬಂದ ಸ್ಥಿರಧರ್ಮ ಕೊಚ್ಚಿಕೊಂಡು ಹೋಗುತ್ತದೆ" ಎಂದು ಅರ್ಜುನ ಕೃಷ್ಣನ ಮುಂದೆ ತನ್ನ ವಾದವನ್ನು ಮಂಡಿಸುತ್ತಾನೆ.

ಉತ್ಸನ್ನಕುಲಧರ್ಮಾಣಾಂ ಮನುಷ್ಯಾಣಾಂ ಜನಾರ್ದನ ।
ನರಕೇ ನಿಯತಂ ವಾಸೋ ಭವತೀತ್ಯನುಶುಶ್ರುಮ ॥೪೪॥

ಉತ್ಸನ್ನ ಕುಲಧರ್ಮಾಣಾಮ್ ಮನುಷ್ಯಾಣಾಮ್ ಜನಾರ್ದನ ।
ನರಕೇ ನಿಯತಮ್ ವಾಸಃ ಭವತಿ ಇತಿ ಅನುಶುಶ್ರುಮ- ಓ ಜನಾರ್ಧನಾ, ಕುಲ ಧರ್ಮದ ನೆಲೆದಪ್ಪಿದವರಿಗೆ ನರಕವೇ ಮುಗಿಯದ ನೆಲೆ ಎಂದು ಕೇಳಿ ಬಲ್ಲೆವು.

ಇಹದಲ್ಲೂ ನರಕ, ಪರದಲ್ಲೂ ನರಕ, ಹೀಗೆ ಜನ್ಮವೆಲ್ಲಾ ನರಕದಲ್ಲಿ. ಎಂದೆಂದೂ ನರಕದಲ್ಲೇ ಕೊಳೆಯುವ ಪರಿಸ್ಥಿತಿ ಬರುತ್ತದೆ ಎಂದು ತಿಳಿದವರು ಹೇಳುವುದನ್ನು ಕೇಳಿ ತಿಳಿದಿದ್ದೇನೆ. ಹೀಗೆ ಇಹವೂ ನರಕ, ಪರವೂ ನರಕವಾಗಲು ನಾವೇ ಕಾರಣವಾಗುತ್ತೇವೆ.

ಅಹೋ ಬತ ಮಹತ್ ಪಾಪಂ ಕರ್ತುಂ ವ್ಯವಸಿತಾ ವಯಮ್ ।
ಯದ್ ರಾಜ್ಯಸುಖಲೋಭೇನ ಹಂತುಂ ಸ್ವಜನಮುದ್ಯತಾಃ ॥೪೫॥

ಅಹೋ ಬತ ಮಹತ್ ಪಾಪಮ್ ಕರ್ತುಮ್ ವ್ಯವಸಿತಾಃ ವಯಮ್ ।
ಯತ್ ರಾಜ್ಯಸುಖಲೋಭೇನ ಹಂತುಮ್ ಸ್ವಜನಮ್ ಉದ್ಯತಾಃ -ಅಯ್ಯೋ! ಎಂತಹ ಹಿರಿಯ ತಪ್ಪನ್ನು ಮಾಡತೊಡಗಿದ್ದೆವು ನಾವು ! ದೊರೆತನದ ಸುಖದ ದುರಾಸೆಯಿಂದ ನಮ್ಮ ಮಂದಿಯನ್ನೇ ಕೊಲ್ಲ ಹೊರಟಿದ್ದೇವಲ್ಲ !

ಇಲ್ಲಿ ಅರ್ಜುನ ಕುಸಿದು ಬೀಳುವ ಧ್ವನಿಯಲ್ಲಿ ಹೇಳುತ್ತಾನೆ- "ಅಯ್ಯೋ.. ಎಂತಹ ದೊಡ್ಡ ದುರಂತ, ಎಂತಹ ದೊಡ್ಡ ಪಾಪ ಕಾರ್ಯ ನಮ್ಮ ಮುಂದೆ ನಡೆಯುತ್ತಿತ್ತು? ಎಂತಹ ಪ್ರಮಾದ ಆಗಿ ಹೋಗುತ್ತಿತ್ತು? ನಾವು ದೊಡ್ಡ ತಪ್ಪನ್ನು ಮಾಡಲು ಕೈ ಹಾಕುತ್ತಿದ್ದೆವು. ರಾಜ್ಯ ಸುಖದ ಲೋಭದಿಂದ ನಮ್ಮ ಜನರನ್ನೇ ನಾವು ಕೊಂದು ಇಡೀ ಜನಾಂಗವನ್ನು ಅಧಃಪಾತಕ್ಕೆ ತಳ್ಳುವ ಕೆಲಸ ನಮ್ಮಿಂದಾಗುತ್ತಿತ್ತು" ಎಂದು.

ಯದಿ ಮಾಮಪ್ರತೀಕಾರಮಶಸ್ತ್ರಮ್ ಶಸ್ತ್ರಪಾಣಯಃ ।
ಧಾರ್ತರಾಷ್ಟ್ರಾ ರಣೇ ಹನ್ಯುಸ್ತನ್ಮೇ ಕ್ಷೇಮತರಂ ಭವೇತ್ ॥೪೬॥

ಯದಿ ಮಾಮ್ ಅಪ್ರತೀಕಾರಮ್ ಅಶಸ್ತ್ರಮ್ ಶಸ್ತ್ರಪಾಣಯಃ |
ಧಾರ್ತರಾಷ್ಟ್ರಾಃ ರಣೇ ಹನ್ಯುಃ ತತ್ ಮೇ ಕ್ಷೇಮ ತರಮ್ ಭವೇತ್ -- ಒಂದೊಮ್ಮೆ ಎದುರು ನಿಂತು ಹೋರಾಡದ, ಆಯುಧ ಹಿಡಿಯದ ನನ್ನನ್ನು ಧಾರ್ತರಾಷ್ಟ್ರರು ಆಯುಧ ಹಿಡಿದು ಕೊಲ್ಲುವುದಾದರೆ ಅದು ನನ್ನ ಭಾಗ್ಯವಾದೀತು.

ನಾನು ಪ್ರತೀಕಾರ ಮಾಡುವುದೇ ಇಲ್ಲ. ಒಂದು ವೇಳೆ ಅವರು ನನ್ನನ್ನು ಹೊಡೆಯಲು ಬಂದರೆ ನಾನು ಪ್ರತಿಯಾಗಿ ಹೊಡೆಯುವುದೂ ಇಲ್ಲ. ಕತ್ತಿ ಹಿಡಿದು ನನ್ನನ್ನು ಕೊಂದರೆ ಅದು ನನ್ನ ಭಾಗ್ಯವೆಂದು ನಾನು ಸಾಯುತ್ತೇನೆ. ಏಕೆ ಇಂತಹ ದುರಂತ ನೋಡಿ ಬದುಕಬೇಕು? ಏನಾದರೂ ಸರಿ, ನನಗೆ ಯುದ್ಧ ಬೇಡ. ಎಂದು ಅರ್ಜುನ ಕೈಚೆಲ್ಲುತ್ತಾನೆ.
ಯುದ್ಧ ಪ್ರಾರಂಭದಲ್ಲಿ "ಸೇನಯೋರುಭಯೋರ್ಮಧ್ಯೇ ರಥಂ ಸ್ಥಾಪಯ ಮೇಚ್ಯುತ" ಎಂದು ದರ್ಪದಿಂದ ಹೇಳಿದ ಅರ್ಜುನ- ಕ್ಷಣ ಮಾತ್ರದಲ್ಲಿ ಕರಗಿ ಹೋದ. ಇದು ಆತನ ಸುಪ್ತಪ್ರಜ್ಞೆಯಲ್ಲಿ ಅವನಿಗೆ ತಿಳಿಯದಂತೆ ಅಡಗಿ ಕುಳಿತಿದ್ದ ಭಾವನೆ. ಕೃಷ್ಣ ತನ್ನ ಮನಃಶಾಸ್ತ್ರೀಯ ಚಿಕಿತ್ಸೆ(Psychotherapy)ಯಿಂದ ಅದನ್ನು ಸಂಪೂರ್ಣ ಹೊರ ಬೀಳುವಂತೆ ಮಾಡಿದ. ಇದು ಮಾನಸಿಕ ಸಂಘರ್ಷಕ್ಕೊಳಗಾದವನಿಗೆ ಮೊದಲು ಮಾಡುವ ಚಿಕಿತ್ಸೆ. ಮನುಷ್ಯನ ಮನೋರೋಗವನ್ನು ಹೇಗೆ ಗುಣಪಡಿಸಬಹುದು ಎಂದು ಜಗತ್ತಿಗೆ ತೋರಿಸಿದ ಮೊದಲ ಮಹಾ ಮನೋವಿಜ್ಞಾನಿ ಕೃಷ್ಣ. ಒಂದು ವೇಳೆ ಕೃಷ್ಣ ಅರ್ಜುನನ ಆತ್ಮೀಯರ ಮುಂದೆ ರಥವನ್ನು ನಿಲ್ಲಿಸದೇ ಇದ್ದಿದ್ದರೆ, ಈ ಎಲ್ಲಾ ವಿಚಾರಗಳು ಆತನ ಮನಸ್ಸಿನಿಂದ ಹೊರ ಬರುತ್ತಿರಲಿಲ್ಲ. ಶ್ರೀಕೃಷ್ಣನ ಈ ಮಾನಸಿಕ ಚಿಕಿತ್ಸೆ, ತತ್ವಶಾಸ್ತ್ರದೊಂದಿಗೆ ಮನಃಶಾಸ್ತ್ರವನ್ನು ಅರಿತು ವಿಶ್ಲೇಷಿಸಿದಾಗ ಮಾತ್ರ ನಮಗೆ ಅರ್ಥವಾಗುತ್ತದೆ.

ಸಂಜಯ ಉವಾಚ |
ಏವಮುಕ್ತ್ವಾಽರ್ಜುನಃ ಸಂಖ್ಯೇ ರಥೋಪಸ್ಥ ಉಪಾವಿಶತ್ |
ವಿಸೃಜ್ಯ ಸಶರಂ ಚಾಪಂ ಶೋಕಸಂವಿಗ್ನಮಾನಸಃ ॥೪೭॥

ಸಂಜಯ ಉವಾಚ -ಸಂಜಯ ಹೇಳಿದನು:
ಏವಮ್ ಉಕ್ತ್ವಾ ಅರ್ಜುನಃ ಸಂಖ್ಯೇ ರಥ ಉಪಸ್ಥೇ ಉಪಾವಿಶತ್ |
ವಿಸೃಜ್ಯ ಸಶರಮ್ ಚಾಪಮ್ ಶೋಕ ಸಂವಿಗ್ನ ಮಾನಸಃ -- ಕಾಳಗದ ಕಣದಲ್ಲಿ ಅರ್ಜುನ ಬಿಲ್ಲು ಬಾಣಗಳನ್ನು ಬಿಸುಟು, ಅಳಲಿನಿಂದ ತಳಮಳಿಸುತ್ತಾ ತೇರ ಮಡಿಲಲ್ಲಿ ಕುಳಿತುಬಿಟ್ಟ.

ರಥದಲ್ಲೇ ನಿಂತು ಇಷ್ಟು ಮಾತನಾಡಿದ ಅರ್ಜುನ, ರಥದ ಮಧ್ಯದಲ್ಲಿ ಕುಸಿದು ಕುಳಿತುಬಿಟ್ಟ. ತನ್ನೆಲ್ಲಾ ಶಸ್ತ್ರಾಸ್ತ್ರಗಳನ್ನು ಕೆಳಗೆ ಬಿಟ್ಟು ಕೈಚೆಲ್ಲಿ ಕುಳಿತು ಬಿಟ್ಟ.

ಈ ಅಧ್ಯಾಯದಲ್ಲಿ ಅರ್ಜುನ ತನ್ನೆಲ್ಲಾ ಭಾವನೆಗಳನ್ನು ಕೃಷ್ಣನ ಮುಂದೆ ಬಿಚ್ಚಿಟ್ಟಿದ್ದಾನೆ. ಅರ್ಜುನ ಮಾತನಾಡಿದ ಪ್ರತಿಯೊಂದು ವಿಷಯ ನಮಗೆ ತಿಳಿದ ವಿಷಯ. ಆದರೆ ಮುಂದೆ ಕೃಷ್ಣ ಹೇಳುವುದು ನಮಗೆ ತಿಳಿಯದ್ದು. ಕತ್ತಲೆಯಿಂದ ಬೆಳಕಿನೆಡೆಗೆ ಕೊಂಡೊಯ್ಯುವ ಭಗವಂತನ ಉತ್ತರವನ್ನು ಮುಂದಿನ ಅಧ್ಯಾಯಗಳಲ್ಲಿ ನೋಡೋಣ.

ಮುಂದಿನ ಅಧ್ಯಾಯಕ್ಕೆ ಹೋಗುವ ಮುನ್ನ ಒಂದು ಪುಟ್ಟ ವಿಶ್ಲೇಷಣೆ. ನಮ್ಮಲ್ಲಿ ಹೆಚ್ಚಿನವರಿಗೆ ಒಂದು ಅನುಮಾನವಿದೆ. ಯುದ್ಧ ಭೂಮಿಯಲ್ಲಿ ಶ್ರೀಕೃಷ್ಣ ಮತ್ತು ಅರ್ಜುನ ಹೇಗೆ ಈ ಏಳುನೂರು ಶ್ಲೋಕಗಳ ಸಂಭಾಷಣೆ ಮಾಡಿದರು? ಅವರಿಗೆ ಅಷ್ಟು ಸಮಯ ಇತ್ತೇ? ಎಂದು. ಈ ಪ್ರಶ್ನೆಗೆ ಉತ್ತರ ದೊರೆಯಬೇಕಾದರೆ ಮೊದಲು ನಾವು ಮಹಾಭಾರತ ಕಾಲದ ಯುದ್ಧ ಪದ್ಧತಿಯನ್ನು ತಿಳಿದಿರಬೇಕು. ಆಗಿನ ಕಾಲದ ಯುದ್ಧ ನಿಯಮದ ಪ್ರಕಾರ ಯುದ್ಧದಲ್ಲಿ ಎದುರಾಳಿ ಸಿದ್ಧವಿಲ್ಲದಿದ್ದರೆ ಅವನ ಮೇಲೆ ಆಕ್ರಮಣ ಮಾಡುವಂತಿರಲಿಲ್ಲ. ಒಬ್ಬ ಸಜ್ಜಾಗಿ ನಿಲ್ಲದೆ ಯುದ್ಧ ಪ್ರಾರಂಭವಾಗುತ್ತಿರಲಿಲ್ಲ. ಇನ್ನು ಎಷ್ಟು ಹೊತ್ತು ಅವರ ಸಂಭಾಷಣೆ ನಡೆಯಿತು ಎನ್ನುವ ಪ್ರಶ್ನೆ. ಅರ್ಜುನ ಆ ಕಾಲದ ಮಹಾಮೇಧಾವಿಗಳಲ್ಲಿ ಒಬ್ಬ. ಇಲ್ಲಿ ಸಂಭಾಷಣೆ ನೆಡೆಯುತ್ತಿರುವುದು ಇಬ್ಬರು ಮೇಧಾವಿಗಳ ನಡುವೆ. ಆ ಮಟ್ಟದ ಜ್ಞಾನವನ್ನು ಇಂದು ನಾವು ಊಹಿಸುವುದೂ ಕಷ್ಟ. ಅವರ ಸಂಪೂರ್ಣ ಸಂಭಾಷಣೆ ನಡೆದಿದ್ದು ಇಂದಿನ ಈ ಏಳುನೂರು ಶ್ಲೋಕ ರೂಪದಲ್ಲಿ ಅಲ್ಲ. ವೇದವ್ಯಾಸರು ಅವರ ಸಂಭಾಷಣೆಯನ್ನು ನಮಗೆ ಅರ್ಥವಾಗುವಂತೆ ಏಳುನೂರು ಶ್ಲೋಕ ರೂಪದಲ್ಲಿ ನಮ್ಮ ಮುಂದಿಟ್ಟಿದ್ದಾರೆ ಅಷ್ಟೆ. ಇಂದು ನಮಗೆ ಈ ಶ್ಲೋಕ ಕೂಡಾ ಅರ್ಥವಾಗುವುದಿಲ್ಲ. ಅದಕ್ಕಾಗಿ ನಾವು ಗೀತೆಯ ಭಾಷ್ಯವನ್ನು ಸಾವಿರಾರು ಪುಟಗಳಲ್ಲಿ ಕಾಣುತ್ತೇವೆ. ಆದರೆ ಮಹಾ ಮೇಧಾವಿಗಳು ಇದನ್ನು ಅತೀ ಸಂಕ್ಷಿಪ್ತವಾಗಿ ಅತೀ ಕಡಿಮೆ ಸಮಯದಲ್ಲಿ ಹೇಳಬಲ್ಲರು ಹಾಗೂ ಅರ್ಥ ಮಾಡಿಕೊಳ್ಳಬಲ್ಲರು. ಕೃಷ್ಣ ಮತ್ತು ಅರ್ಜುನರ ನಡುವೆ ನಡೆದ ಸಂಭಾಷಣೆ ಕೂಡಾ ಇಂತಹ ವಿಷಯಭರಿತ ಸಂಕ್ಷಿಪ್ತ ಸಂಭಾಷಣೆ.

ಇನ್ನೊಂದು ಮುಖ್ಯ ವಿಷಯ ಎಂದರೆ ಗೀತೆಯನ್ನು ಕೃಷ್ಣ ಅರ್ಜುನನಿಗೇ ಏಕೆ ಹೇಳಿದ? ಆತನ ಅಣ್ಣ ಭೀಮನಿಗೆ ಅಥವಾ ಇತರರಿಗೆ ಏಕೆ ಹೇಳಲಿಲ್ಲ? ಎನ್ನುವ ಪ್ರಶ್ನೆ. ಈ ಪ್ರಶ್ನೆಗೆ ಉತ್ತರ ಅತಿ ಸುಲಭ. ರೋಗ ಬಂದವನಿಗೆ ಮದ್ದೇ ಹೊರತು ಇತರರಿಗಲ್ಲ. ಅಲ್ಲಿ ಮಾನಸಿಕವಾಗಿ ಆಂತರಿಕ ತುಮುಲದಲ್ಲಿದ್ದವನು ಅರ್ಜುನ ಮಾತ್ರ. ಅದಕ್ಕಾಗಿ ಶ್ರೀಕೃಷ್ಣ ಅರ್ಜುನನಿಗೆ(ಆತನ ಮುಖೇನ ನಮಗೆ) ಗೀತೋಪದೇಶ ಮಾಡಿದ.

ಇತಿ ಪ್ರಥಮೋಽಧ್ಯಾಯಃ

ಮೊದಲನೇ ಅಧ್ಯಾಯ ಮುಗಿಯಿತು.



# ಅಧ್ಯಾಯ ಎರಡು

ಯುದ್ಧ ಮಾಡುವುದಿಲ್ಲ ಎಂದು ಕೈಚೆಲ್ಲಿ ರಥದಲ್ಲಿ ಕುಸಿದು ಕುಳಿತ ಅರ್ಜುನನಿಗೆ ಶ್ರೀಕೃಷ್ಣನ ಉಪದೇಶ ಎರಡನೇ ಅಧ್ಯಾಯದಿಂದ ಪ್ರಾರಂಭವಾಗುತ್ತದೆ. ಈ ಅಧ್ಯಾಯ ಇಡೀ ಭಗವದ್ಗೀತೆಗೆ ಪಂಚಾಂಗ ರೂಪದಲ್ಲಿದ್ದು, ಸಮಗ್ರ ಸಂದೇಶದ ಸಾರವನ್ನು ವ್ಯಾಸರು ಇಲ್ಲಿ ಸೆರೆ ಹಿಡಿದಿದ್ದಾರೆ.ಇಲ್ಲಿ ಬರುವ ಉಪದೇಶದ ವಿಸ್ತಾರ ರೂಪವೇ ಇತರ ಹದಿನಾರು ಅಧ್ಯಾಯಗಳು.

ಸಂಜಯ ಉವಾಚ ।

ತಂ ತಥಾ ಕೃಪಯಾऽऽವಿಷ್ಟಮಶ್ರುಪೂರ್ಣಾಕುಲೇಕ್ಷಣಮ್ ।
ವಿಷೀದಂತಮಿದಂ ವಾಕ್ಯಮುವಾಚ ಮಧುಸೂದನಃ ॥೧॥

ಸಂಜಯ ಉವಾಚ-ಸಂಜಯ ಹೇಳಿದನು:
ತಮ್ ತಥಾ ಕೃಪಯಾ ಆವಿಷ್ಟಮ್ ಅಶ್ರು ಪೂರ್ಣ ಆಕುಲ ಈಕ್ಷಣಮ್ ।
ವಿಷೀದಂತಮ್ ಇದಮ್ ವಾಕ್ಯಮ್ ಉವಾಚ ಮಧುಸೂದನಃ -ಹಾಗೆ ಕಾರುಣ್ಯಕ್ಕೊಳಗಾಗಿ ಕಂಬನಿ ತುಂಬಿ ಕಣ್ಣು ಮಸುಕಾಗಿ ಉಮ್ಮಳಿಸುತ್ತಿರುವ ಅವನನ್ನು ಕಂಡು ಕೃಷ್ಣ ಈ ಮಾತು ನುಡಿದ.

ಅರ್ಜುನನಿಗೆ ಇಡೀ ಸಮಾಜದ, ಜನಾಂಗದ ಮೇಲೆ ಅನುಕಂಪ. ಯುದ್ಧ ಮಾಡುವುದರಿಂದ ಜನಾಂಗ ಹತ್ಯೆಗೆ ಕಾರಣವಾಗುತ್ತೇವೆ ಎನ್ನುವುದು ಆತನ ತಲೆಯಲ್ಲಿ ತುಂಬಿ ಹೋಗಿದೆ. ಕೃಪೆಯ ಆವೇಶದಿಂದ ಕಣ್ಣಲ್ಲಿ ನೀರಿಳಿಯುತ್ತಿದೆ. ಅಜ್ಞಾನದ ಮಂಜು ಮನಸ್ಸನ್ನು ವಿಕ್ಷಿಪ್ತಗೊಳಿಸಿದೆ. ತರ್ಕದ ಮೂಲಕ ತನ್ನನ್ನು ತಾನು ಸಮರ್ಥಿಸಿಕೊಳ್ಳಲು ನೋಡುತ್ತಿದ್ದಾನೆ. ಇದು ಸಹಜ ಪ್ರವೃತ್ತಿ ಅಲ್ಲ, ಇದೊಂದು ಆವೇಶ. ಇದಕ್ಕೆ ಕೃಷ್ಣ ನಿಷ್ಠುರವಾಗಿ ಉತ್ತರಿಸುತ್ತಾನೆ.

ಭಗವಾನುವಾಚ ।

ಕುತಸ್ತ್ವಾ ಕಶ್ಮಲಮಿದಂ ವಿಷಮೇ ಸಮುಪಸ್ಥಿತಮ್ ।
ಅನಾರ್ಯಜುಷ್ಟಮಸ್ವರ್ಗ್ಯಮಕೀರ್ತಿಕರಮರ್ಜುನ ॥೨॥

ಭಗವಾನ್ ಉವಾಚ-ಭಗವಂತ ಹೇಳಿದನು:
ಕುತಃ ತ್ವಾ ಕಶ್ಮಲಮ್ ಇದಮ್ ವಿಷಮೇ ಸಮುಪಸ್ಥಿತಮ್ ।
ಅನಾರ್ಯ ಜುಷ್ಟಮ್ ಅಸ್ವರ್ಗ್ಯಮ್ ಅಕೀರ್ತಿ ಕರಮ್ ಅರ್ಜುನ - ಅರ್ಜುನಾ, ಇಂತಹ ಸಂಕಟದಲ್ಲಿ ಬಲ್ಲವರು ಮೆಚ್ಚದ, ಅಲ್ಲಿ ಸ್ವರ್ಗಕ್ಕೆ ಸಲ್ಲದ, ಇಲ್ಲಿ ಹೆಸರುಗೆಡಿಸುವ ಈ ಕೊಳೆ ನಿನ್ನನ್ನೇಕೆ ಕವಿಯಿತು?
"ಎಲ್ಲಿಂದ ಬಂತು ನಿನಗೆ ಈ ಬುದ್ಧಿ? ಈ ಭೌತಿಕ ಕೊಳೆ ನಿನಗೆ ಹೇಗೆ ಅಂಟಿತು? ಇಂತಹ ತುರ್ತುಪರಿಸ್ಥಿತಿಯಲ್ಲಿ, ತಕ್ಷಣ ಕಾರ್ಯಪ್ರವೃತ್ತರಾಗಬೇಕಾದ ಈ ಕ್ಷಣದಲ್ಲಿ-ಇದೇನು ಹೊಲಸು ಯೋಚನೆ? ಆರ್ಯರಾದವರು ಯಾರೂ ಈ ರೀತಿ ಎಂದೂ ಯೋಚಿಸುವುದಿಲ್ಲ. ಇಂತಹ ವಿಚಾರಧಾರೆಯಿಂದ- ಪರದಲ್ಲಿ ಸ್ವರ್ಗವಿಲ್ಲ ಹಾಗೂ ಇಹದಲ್ಲಿ

ಕೀರ್ತಿ ಇಲ್ಲ. ತಿಳಿದವರು, ಜ್ಞಾನಿಗಳು, ಹಿರಿಯರು ಎಂದೂ ಈ ರೀತಿ ಯೋಚನೆ ಮಾಡುವುದಿಲ್ಲ"-ಎಂದು ನಿಷ್ಠುರವಾಗಿ ಅರ್ಜುನನ ಸಂಪೂರ್ಣ ವಾದವನ್ನು ಒಂದೇ ಮಾತಿನಲ್ಲಿ ಹೊಡೆದು ಹಾಕಿದ ಕೃಷ್ಣ. ಇಲ್ಲಿ ಬಳಕೆಯಾದ "ಆರ್ಯ" ಎನ್ನುವ ಪದ ಜನಾಂಗ ವಾಚಕ ಪದ ಅಲ್ಲ. ಆರ್ಯ ಎಂದರೆ ತಿಳುವಳಿಕೆ ಇರುವವರು, ವಯೋವೃದ್ಧ ಜ್ಞಾನಿಗಳು, ಗೌರವಾನ್ವಿತರು ಎಂದರ್ಥ. ಕನ್ನಡದಲ್ಲಿ 'ಅಯ್ಯಾ' ಎನ್ನುವ ಪದಕ್ಕೆ ಇದೇ ಅರ್ಥವಿದೆ.

ಕ್ಲೈಬ್ಯಂ ಮಾಸ್ಮ ಗಮಃ ಪಾರ್ಥ ನೈತತ್ ತ್ವಯ್ಯುಪಪದ್ಯತೇ ।
ಕ್ಷುದ್ರಂ ಹೃದಯದೌರ್ಬಲ್ಯಂ ತ್ಯಕ್ತ್ವೋತ್ತಿಷ್ಠ ಪರಂತಪ ॥೩॥

ಕ್ಲೈಬ್ಯಮ್ ಮಾ ಸ್ಮ ಗಮಃ ಪಾರ್ಥ ನ ಏತತ್ ತ್ವಯಿ ಉಪಪದ್ಯತೇ |
ಕ್ಷುದ್ರಮ್ ಹೃದಯ ದೌರ್ಬಲ್ಯಮ್ ತ್ಯಕ್ತ್ವಾ ಉತ್ತಿಷ್ಠ ಪರಂತಪ -ಪಾರ್ಥಾ, ಹೇಡಿಯಾಗಬೇಡ, ನಿನ್ನಲ್ಲಿ ಇದು ತರವಲ್ಲ. ಅರಿಗಳ ಎದೆಗೆಡಿಸುವ ವೀರನೇ, ಕೀಳರಿಮೆಯ ಎದೆಗೇಡಿತನವನ್ನು ತೊರೆದು ಎದ್ದು ನಿಲ್ಲು.

"ನಪುಂಸಕನಂತೆ ಮಾತನಾಡಬೇಡ. ಅರ್ಜುನನಲ್ಲಿ ಇಂತಹ ಹೇಡಿತನವನ್ನು ನಾನು ನಿರೀಕ್ಷಿಸಿರಲಿಲ್ಲ. ಇಂತಹ ಕ್ಷುದ್ರ ಮಾನಸಿಕ ದೌರ್ಬಲ್ಯವನ್ನು ತೊಡೆದುಹಾಕಿ, ವೀರನಾಗಿ ಅನ್ಯಾಯದ ವಿರುದ್ಧ ಹೋರಾಡು" ಎಂದು ಹೇಳಿ ಕೃಷ್ಣ, ಅರ್ಜುನನಿಗೆ ದಿಗ್ಭ್ರಾಂತಿಗೊಳಿಸಿ ಚಿಕಿತ್ಸೆ(Shock Treatment) ನೀಡಿದ್ದಾನೆ.
ಕೃಷ್ಣ ಏಕೆ ಹೀಗೆ ಹೇಳಿದ? ಆತ ಯುದ್ಧ ಹಾಗೂ ರಕ್ತಪಾತವನ್ನು ಬಯಸಿದ್ದನೇ ? ಇತ್ಯಾದಿ ಪ್ರಶ್ನೆ ನಮ್ಮಲ್ಲಿ ಮೂಡುವುದು ಸಾಮಾನ್ಯ. ಇಲ್ಲಿ ಸೂಕ್ಷ್ಮವಾಗಿ ನೋಡಿದರೆ: ಯುದ್ಧವಾದರೆ ಸಾಮಾಜಿಕವಾಗಿ ಏನೇನು ತೊಂದರೆ ಆಗಬಹುದೆಂದು ಅರ್ಜುನ ಹೇಳಿದ್ದನೋ, ಅದಕ್ಕಿಂತ ಹತ್ತುಪಟ್ಟು ಅನ್ಯಾಯ ಯುದ್ಧವಾಗದೇ ಇದ್ದಿದ್ದರೆ ಆಗುತ್ತಿತ್ತು. ದುರ್ಯೋಧನ ಆ ಕಾಲದ ಮಹಾ ಲೋಕಕಂಟಕ. ತುಂಬಿದ ಸಭೆಯಲ್ಲಿ ತನ್ನ ಸ್ವಂತ ಅತ್ತಿಗೆಯ ಮಾನಭಂಗಕ್ಕೆ ಕೈ ಹಾಕಿದ ಆತ, ಅಧಿಕಾರದ ಗದ್ದುಗೆ ಏರಿದ್ದರೆ ಸಮಾಜದ ಪರಿಸ್ಥಿತಿ ಏನಾಗುತ್ತಿತ್ತು ಯೋಚಿಸಿ. ಇಲ್ಲಿ ಕೃಷ್ಣನ ಧೋರಣೆ ಈ ದೇಶದ ನಾಯಕತ್ವ ಮುಂದೆ ಯಾರ ಕೈ ಸೇರಬೇಕು ಎನ್ನುವುದೇ ಹೊರತು, ಬಂಧು ಪ್ರೇಮವಲ್ಲ. ಗೆಲ್ಲುವುದು-ಸೋಲುವುದಕ್ಕಿಂತ, ಅನ್ಯಾಯದ ವಿರುದ್ಧ ಧ್ವನಿ ಎತ್ತುವುದು ಮುಖ್ಯ. ಅನ್ಯಾಯದ ವಿರುದ್ಧ ಹೋರಾಡಿ ಸತ್ತರೂ ತೊಂದರೆ ಇಲ್ಲ, ಆದರೆ ಅದರ ವಿರುದ್ಧ ಸೆಟೆದು ನಿಲ್ಲಬೇಕು ಎನ್ನುವುದು ಕೃಷ್ಣನ ಸಂದೇಶ.
ಶ್ರೀ ಕೃಷ್ಣ ಮಹಾಭಾರತದ ಮುಖೇನ ನಮಗೆ ಧರ್ಮದ ಒಂದು ಹೊಸ ಸಿದ್ಧಾಂತವನ್ನು ಕೊಟ್ಟ. ಮಹಾಭಾರತಕ್ಕೆ ಮೊದಲು ಇದ್ದ ಧರ್ಮದ ಕಲ್ಪನೆಯೇ ಬೇರೆ. ಉದಾಹರಣೆಗೆ ಸತ್ಯ ಹೇಳುವುದು: ಇದ್ದದ್ದನ್ನು ಇದ್ದಂತೆ ಹೇಳುವುದು ಸತ್ಯ. ಆದರೆ ಕೃಷ್ಣನ ಪ್ರಕಾರ-ಯಾವ ಸುಳ್ಳು ಹೇಳುವುದರಿಂದ ಸಮಾಜಕ್ಕೆ ಹಿತವಾಗುತ್ತದೋ ಅದು ಸತ್ಯ; ಯಾವ ಸತ್ಯ ಹೇಳುವುದರಿಂದ ಸಮಾಜಕ್ಕೆ ಕೆಡುಕಾಗುತ್ತದೋ ಅದು ಸುಳ್ಳು. ಇನ್ನು ಹಿಂಸೆ: ಒಂದು ಹಿಂಸೆಯಿಂದ ಅನೇಕ ಅಹಿಂಸೆ ಸಾಧ್ಯವಾದರೆ ಅದು ಅಹಿಂಸೆ. ಉದಾಹರಣೆಗೆ ನರಭಕ್ಷಕ ಹುಲಿಯೊಂದು ಪ್ರತಿದಿನ ಊರಿಗೆ ದಾಳಿಯಿಟ್ಟು ಒಬ್ಬೊಬ್ಬರನ್ನೇ ತಿನ್ನುತ್ತಿದ್ದರೆ, ಅದನ್ನು ಕೊಲ್ಲುವುದು ಪ್ರಾಣಿ ಹಿಂಸೆ ಅಲ್ಲ. ಒಂದು ಯುದ್ಧದಿಂದ ತಲತಲಾಂತರದವರೆಗೆ ಅಹಿಂಸೆ ಸ್ಥಾಪನೆ ಸಾಧ್ಯವಾದರೆ ಯುದ್ಧಮಾಡುವುದರಲ್ಲಿ ತಪ್ಪಿಲ್ಲ. ಯಾವುದರಿಂದ

ಸಜ್ಜನಿಕೆಯ ರಕ್ಷಣೆ ಆಗುತ್ತದೋ ಅದು ಸತ್ಯ. ಧರ್ಮಕ್ಕೆ ಭಾವ ಮುಖ್ಯ. ಯಾವ ಕಾರಣಕ್ಕಾಗಿ ಹೋರಾಡುತ್ತೇವೋ, ಅದರ ಹಿಂದೆ ಇರುವ ಉದ್ದೇಶ ಏನು ಎನ್ನುವುದು ಮುಖ್ಯ.

ಅರ್ಜುನ ಉವಾಚ ।
ಕಥಂ ಭೀಷ್ಮಮಹಂ ಸಂಖೇ ದ್ರೋಣಂ ಚ ಮಧುಸೂದನ ।
ಇಷುಭಿಃ ಪ್ರತಿಯೋತ್ಸ್ಯಾಮಿ ಪೂಜಾರ್ಹಾವರಿಸೂದನ ॥೪॥

ಅರ್ಜುನಃ ಉವಾಚ-ಅರ್ಜುನ ಹೇಳಿದನು:
ಕಥಮ್ ಭೀಷ್ಮಮ್ ಅಹಮ್ ಸಂಖೇ ದ್ರೋಣಮ್ ಚ ಮಧುಸೂದನ ।
ಇಷುಭಿಃ ಪ್ರತಿಯೋತ್ಸ್ಯಾಮಿ ಪೂಜಾರ್ಹಾ ಅರಿಸೂದನ- ಅರಿಗಳನ್ನು ತರಿದ ಓ ಮಧುಸೂದನಾ, ಭೀಷ್ಮನನ್ನು, ದ್ರೋಣನನ್ನು, ಪೂಜಿಸಬೇಕಾದ ಮಂದಿಯನ್ನು ನಾನೆಂತು ರಣದಲ್ಲಿ ಬಾಣಗಳಿಂದ ಹೊಡೆದು ಹೋರಾಡಲೀ?

ಕೃಷ್ಣನ ತೀಕ್ಷ್ಣ ಉತ್ತರ ಹಾಗೂ ಆತನ ನಗುಮೊಗವನ್ನು ಗಮನಿಸಿದ ಅರ್ಜುನನ ಮಾತಿನ ದಾಟಿ ಈಗ ಬದಲಾಗುತ್ತದೆ. ಆತ ಭಾವಾವೇಶ ಬಿಟ್ಟು ಈಗ ಭಾವುಕತೆಯಿಂದ ಶರಣಾಗತಿಯತ್ತ ಹೊರಳುತ್ತಿದ್ದಾನೆ.

ಅರ್ಜುನ ಹೇಳುತ್ತಾನೆ: "ನನ್ನ ಕಣ್ಣಮುಂದೆ ನಿಂತ ಭೀಷ್ಮಾಚಾರ್ಯರು, ದ್ರೋಣಾಚಾರ್ಯರನ್ನು ಹೇಗೆ ಎದುರಿಸಲೀ? ಒಬ್ಬರು ನಮ್ಮ ವಂಶದ ಮೂಲಪುರುಷನಾದ ರಾಜರ್ಷಿ; ಇನ್ನೊಬ್ಬರು ಎಲ್ಲಾ ಕ್ಷತ್ರಿಯರಿಗೂ ವಿದ್ಯೆ ಕೊಟ್ಟ ಮಹರ್ಷಿ. ಇಂತಹ ಪೂಜಾರ್ಹರಾದ ಮಹನೀಯರತ್ತ ಹೇಗೆ ಬಾಣ ಹೂಡಲೀ ? ಸೃಷ್ಟಿಯ ಆದಿಯಲ್ಲಿ ಮಧು-ಕೈತಪರನ್ನು ಸಂಹಾರ ಮಾಡಿದ ಓ ಮಧುಸೂದನನೇ; ದುಷ್ಟ ಸಂಹಾರಕ್ಕೆಂದು ಅವತರಿಸಿದ ಅರಿಸೂದನನೇ, ಜ್ಞಾನಿಗಳ, ಆಚಾರ್ಯರ ಹತ್ಯೆ ನಿನ್ನ ಮೂಲ ಉದ್ದೇಶ ಅಲ್ಲ" . ಎಂದು ಭಿನ್ನ ದಾಟಿಯಲ್ಲಿ ಅರ್ಜುನ ತನ್ನ ಮಾತನ್ನು ಮುಂದುವರಿಸುತ್ತಾನೆ.

ಗುರೂನಹತ್ವಾ ಹಿ ಮಹಾನುಭಾವಾನ್ ಶ್ರೇಯೋ ಭೋಕ್ತುಂ ಭೈಕ್ಷ್ಯಮಪೀಹ ಲೋಕೇ ।
ಹತ್ವಾSರ್ಥಕಾಮಾಂಸ್ತು ಗುರೂನಿಹೈವ ಭುಂಜೀಯ ಭೋಗಾನ್ ರುಧಿರಪ್ರದಿಗ್ಧಾನ್ ॥೫॥

ಗುರೂನ್ ಅಹತ್ವಾ ಹಿ ಮಹಾನುಭಾವಾನ್ ಶ್ರೇಯಃ ಭೋಕ್ತುಮ್ ಭೈಕ್ಷ್ಯಮ್ ಅಪಿ ಇಹ ಲೋಕೇ ।
ಹತ್ವಾ ಅರ್ಥ ಕಾಮಾನ್ ತು ಗುರೂನ್ ಇಹ ಏವ ಭುಂಜೀಯ ಭೋಗಾನ್ ರುಧಿರ ಪ್ರದಿಗ್ಧಾನ್-- ಈ ಮಹಾನುಭಾವಿಗಳನ್ನು ಕೊಲ್ಲುವ ಬದಲು ಇಲ್ಲೇ, ಈ ನೆಲದಲ್ಲಿ ಭಿಕ್ಷೆ ಬೇಡುವುದು ಮೇಲು. ಸಿರಿಯ ಬೆನ್ನು ಹತ್ತಿದ ಇವರನ್ನು ಕೊಂದು ಇಲ್ಲೇ ಅವರ ನೆತ್ತರಿನಿಂದ ನೆನೆದ ಐಸಿರಿಯನ್ನುಣ್ಣಬೇಕು!
ಗುರು ಹಿರಿಯರನ್ನು ಕೊಂದು, ಸಿರಿವಂತಿಕೆಯ ಭೋಗವನ್ನು ಅನುಭವಿಸುವುದಕ್ಕಿಂತ, ಭಿಕ್ಷೆ ಬೇಡಿ ಬದುಕುವುದು ಹಿರಿತನವಲ್ಲವೇ? ಯಾವ ಸಿಂಹಾಸನ ಅಂತರಂಗದ ಸತ್ಯವನ್ನು ಸಾಕ್ಷಾತ್ಕಾರ ಮಾಡಿಕೊಂಡ ಭೀಷ್ಮ-ದ್ರೋಣರಂತಹ ಮಹಾನುಭಾವರನ್ನು ಕೊಡಲಾರದೋ, ಅಂತಹ ಸಿಂಹಾಸನ ನಮಗೇಕೆ ಬೇಕು?

ದುರ್ಯೋಧನನ ಸಂಬಳದ ದಾಸರಾಗಿ, ಅರಮನೆಯ ಋಣಕ್ಕಾಗಿ ಹೋರಾಟಕ್ಕೆ ನಿಂತ ಇವರನ್ನು ಕೊಂದು ಸಿಂಹಾಸನವೇರಿದರೆ, ಗುರುಗಳ ನೆತ್ತರಿನಿಂದ ತೊಯ್ದ ಭೋಗವನ್ನು ಅನುಭವಿಸಿದಂತೆ.

ನ ಚೈತದ್ ವಿದ್ಮಃ ಕತರನ್ನೋ ಗರೀಯೋ ಯದ್ ವಾ ಜಯೇಮ ಯದಿ ವಾ ನೋ ಜಯೇಯುಃ ।
ಯಾನೇವ ಹತ್ವಾ ನ ಜಿಜೀವಿಷಾಮಸ್ತೇಽವಸ್ಥಿತಾಃ ಪ್ರಮುಖೇ ಧಾರ್ತರಾಷ್ಟ್ರಾಃ ॥೬॥

ನ ಚ ಏತತ್ ವಿದ್ಮಃ ಕತರತ್ ನಃ ಗರೀಯಃ ಯತ್ ವಾ ಜಯೇಮ ಯದಿ ವಾ ನಃ ಜಯೇಯುಃ ।
ಯಾನ್ ಏವ ಹತ್ವಾ ನ ಜಿಜೀವಿಷಾಮಃ ತೇ ಅವಸ್ಥಿತಾಃ ಪ್ರಮುಖೇ ಧಾರ್ತರಾಷ್ಟ್ರಾಃ --ಇದೇ ತಿಳಿಯುತ್ತಿಲ್ಲ. ಯಾವುದು ನಮಗೆ ಹೆಚ್ಚು ಒಳಿತು-ನಾವು ಗೆಲ್ಲುವುದೇ? ಅಥವಾ ನಮ್ಮನ್ನು ಅವರು ಗೆಲ್ಲುವುದೇ? ಯಾರನ್ನು ಕೊಂದು ನಾವು ಬದುಕ ಬಯಸುವುದಿಲ್ಲವೋ, ಅವರು(ಕೌರವರು) ನಮ್ಮೆದುರು ನಿಂತಿದ್ದಾರೆ.

ಇಲ್ಲಿಯ ತನಕ ತನ್ನ ವಾದವನ್ನೇ ಮಂಡಿಸಿದ ಅರ್ಜುನ ಈಗ ಕೃಷ್ಣನಿಗೆ ಶರಣಾಗಿ ತನಗ್ಯಾವುದು ಒಳಿತು ಎಂದು ಪ್ರಶ್ನೆ ಮಾಡುತ್ತಾನೆ. "ನಾವು ಯುದ್ಧ ಮಾಡಿ ಗೆಲ್ಲುವುದರಲ್ಲಿ ನಮಗೆ ಶ್ರೇಯಸ್ಸೋ ಅಥವಾ ಗುರುಹಿರಿಯರು ಗೆಲ್ಲುವುದರಲ್ಲಿ ನಮಗೆ ಶ್ರೇಯಸ್ಸೋ ತಿಳಿಯುತ್ತಿಲ್ಲ. ಯುದ್ಧದಲ್ಲಿ ಗೆಲ್ಲಬೇಕು ಎನ್ನುವ ಆಸೆಯೂ ಹೊರಟುಹೋಗಿದೆ" ಎಂದು ತನ್ನ ಮನಸ್ಸಿನ ಸಂಧಿಗ್ದತೆಯನ್ನು ಅರ್ಜುನ ಕೃಷ್ಣನ ಮುಂದೆ ಬಿಚ್ಚಿಡುತ್ತಾನೆ. ತಂದೆ ಸಮನಾದ ಧೃತರಾಷ್ಟ್ರ, ಅವರ ಮಕ್ಕಳು ನಮ್ಮ ಮುಂದೆ ಯುದ್ಧಕ್ಕೆ ನಿಂತಿದ್ದಾರೆ. ಮಕ್ಕಳೆಂದರೆ ಪ್ರಾಣ ಬಿಡುವ ನಮ್ಮ ದೊಡ್ಡಪ್ಪನ ವಿರುದ್ಧ ಹೋರಾಡಲು ಇಷ್ಟವಿಲ್ಲ ಎನ್ನುತ್ತಾನೆ ಅರ್ಜುನ.

ಕಾರ್ಪಣ್ಯದೋಷೋಪಹತಸ್ವಭಾವಃ ಪೃಚ್ಛಾಮಿ ತ್ವಾ ಧರ್ಮಸಮ್ಮೂಢಚೇತಾಃ ।
ಯಚ್ಛ್ರೇಯಃ ಸ್ಯಾನ್ನಿಶ್ಚಿತಂ ಬ್ರೂಹಿ ತನ್ಮೇ ಶಿಷ್ಯಸ್ತೇಽಹಂ ಶಾಧಿ ಮಾಂ ತ್ವಾಮ್ ಪ್ರಪನ್ನಮ್ ॥೭॥

ಕಾರ್ಪಣ್ಯ ದೋಷ ಉಪಹತ ಸ್ವಭಾವಃ ಪೃಚ್ಛಾಮಿ ತ್ವಾಮ್ ಧರ್ಮ ಸಮ್ಮೂಢ ಚೇತಾಃ ।
ಯತ್ ಶ್ರೇಯಃ ಸ್ಯಾತ್ ನಿಶ್ಚಿತಮ್ ಬ್ರೂಹಿ ತತ್ ಮೇ ಶಿಷ್ಯಃ ತೇ ಅಹಮ್ ಶಾಧಿ ಮಾಮ್ ತ್ವಾಮ್ ಪ್ರಪನ್ನಮ್--ದೌರ್ಬಲ್ಯದ ದೋಷದಿಂದ ನನ್ನ ಸಹಜ ಬೀರಕ್ಕೆ ಮಂಕು ಕವಿದಿದೆ. ಧರ್ಮದ ಬಗೆಗೆ ಬಗೆಗಾಣದವನಾಗಿ ನಿನ್ನನ್ನು ಕೇಳುತ್ತಿದ್ದೇನೆ; ಹೇಳು ನನಗಿದನ್ನು: ಯಾವುದು ನಿಖರವಾದ ಒಳಿತಿನ ದಾರಿ? ನಾನು ನಿನ್ನ ಶಿಷ್ಯ. ನಿನಗೆ ಶರಣು ಬಂದ ನನಗೆ ದಾರಿ ತೋರು.

ನನಗೆ ಕಾರ್ಪಣ್ಯ ದೋಷ ಬಂದಿದೆ. ಯಾವುದು ಸರಿ ಯಾವುದು ತಪ್ಪು ಎಂದು ತೀರ್ಮಾನ ಮಾಡಲಾರದ ದಯನೀಯ ಸ್ಥಿತಿಯಲ್ಲಿದ್ದೇನೆ. ಧರ್ಮದ ಬಗ್ಗೆ ನನ್ನ ಚಿಂತನಶಕ್ತಿ ಗೊಂದಲದ ಗೂಡಾಗಿದೆ. ಯುದ್ಧ ಬೇಕೋ ಬೇಡವೋ ಎನ್ನುವ ಗೊಂದಲ ನನ್ನನ್ನು ಕಾಡುತ್ತಿದೆ. ಯಾವುದು ನನಗೆ ಹಿತ ಎಂದು ತಿಳಿಯದಾಗಿದೆ. ನಾನು ನಿನ್ನ ಶಿಷ್ಯನಾಗಿ ನಿನ್ನಲ್ಲಿ ಶರಣಾಗಿದ್ದೇನೆ. ನನಗೆ ಮಾರ್ಗದರ್ಶನ ಮಾಡು ಎಂದು ಅರ್ಜುನ ಕೃಷ್ಣನಲ್ಲಿ

ಕೇಳಿಕೊಳ್ಳುತ್ತಾನೆ. ಇಲ್ಲಿಯ ತನಕ ಭಗವಂತನ ಮುಂದೆ ಪಂಡಿತನಂತೆ ಮಾತನಾಡಿದ ಅರ್ಜುನ, ಈಗ ಭಗವಂತನಲ್ಲಿ ಶರಣಾಗತಿಯನ್ನು ಬೇಡುತ್ತಿರುವುದು ಇಲ್ಲಿ ಸ್ಪಷ್ಟವಾಗಿ ಕಾಣುತ್ತದೆ.

ನಹಿ ಪ್ರಪಶ್ಯಾಮಿ ಮಮಾಪನುದ್ಯಾದ್ ಯಚ್ಛೋಕಮುಚ್ಛೋಷಣಮಿಂದ್ರಿಯಾಣಾಮ್ ।
ಅವಾಪ್ಯ ಭೂಮಾವಸಪತ್ನಮೃದ್ಧಂ ರಾಜ್ಯಂ ಸುರಾಣಾಮಪಿ ಚಾಽಧಿಪತ್ಯಮ್ ॥೮॥

ನ ಹಿ ಪ್ರಪಶ್ಯಾಮಿ ಮಮ ಅಪನುದ್ಯಾತ್ ಯತ್ ಶೋಕಮ್ ಉಚ್ಛೋಷಣಮ್ ಇಂದ್ರಿಯಾಣಾಮ್ ।
ಅವಾಪ್ಯ ಭೂಮೌ ಅಸಪತ್ನಮ್ ಋದ್ಧಮ್ ರಾಜ್ಯಮ್ ಸುರಾಣಾಮ್ ಅಪಿ ಚ ಆಧಿಪತ್ಯಮ್ - ಸತ್ವ ಸಾರವನ್ನೆಲ್ಲಾ ಹೀರಿ ಬತ್ತಿಸಿಬಿಡಬಲ್ಲ ನನ್ನ ಈ ದುಗುಡವನ್ನು ದೂರೀಕರಿಸಬಲ್ಲ ದಾರಿಯನ್ನೇ ಕಾಣದವನಾಗಿದ್ದೇನೆ-ಹಗೆಗಳೇ ಇಲ್ಲದ, ಹುಲುಸಾದ ಇಡಿಯ ನೆಲದ ಒಡೆತನ ಪಡೆದರೂ, ಸಗ್ಗಿಗರ ಸಾಮ್ರಾಟನಾದರೂ ಕೂಡಾ.

"ನನ್ನ ಇಂದ್ರಿಯಗಳು ಸೊರಗಿ ಹೋಗುತ್ತಿವೆ. ನನ್ನ ದುಃಖವನ್ನು ಹೊಡೆದೋಡಿಸಲು ನನಗೆ ಮಾರ್ಗವೇ ಕಾಣುತ್ತಿಲ್ಲ. ಭೂಮಿಯಲ್ಲಿ, ಸ್ವರ್ಗದಲ್ಲಿ ಪ್ರಭುತ್ವವನ್ನು ಪಡೆದರೂ ಕೂಡಾ ನಾನು ಈ ದುಃಖವನ್ನು ಹೋಗಲಾಡಿಸಿಕೊಳ್ಳಲಾರೆ" ಎನ್ನುತ್ತಾನೆ ಅರ್ಜುನ.

ಸಂಜಯ ಉವಾಚ ।
ಏವಮುಕ್ತ್ವಾ ಹೃಷೀಕೇಶಂ ಗುಡಾಕೇಶಃ ಪರಂತಪಃ ।
ನ ಯೋತ್ಸ್ಯ ಇತಿ ಗೋವಿಂದಮುಕ್ತ್ವಾ ತೂಷ್ಣೀಂ ಬಭೂವ ಹ ॥೯॥

ಸಂಜಯ ಉವಾಚ -ಸಂಜಯ ಹೇಳಿದನು:
ಏವಮ್ ಉಕ್ತ್ವಾ ಹೃಷೀಕೇಶಮ್ ಗುಡಾಕೇಶಃ ಪರಂತಪಃ ।
ನ ಯೋತ್ಸ್ಯೇ ಇತಿ ಗೋವಿಂದಮ್ ಉಕ್ತ್ವಾ ತೂಷ್ಣೀಮ್ ಬಭೂವ ಹ- ಅರಿಗಳನ್ನು ತರಿದ, ನಿದ್ದೆಯನ್ನು ಗೆದ್ದ ಅರ್ಜುನ-ಇಂದ್ರಿಯಗಳ ಒಡೆಯನಾದ ಗೋವಿಂದನ ಬಳಿ ಹೀಗೆಂದು- ಮತ್ತೆ 'ನಾನು ಕಾದಲಾರೆ' ಎಂದು ಸುಮ್ಮನಾದನು!
ಸಂಜಯ ಯುದ್ಧಭೂಮಿಯಲ್ಲಿ ಅರ್ಜುನನ ಸ್ಥಿತಿಯನ್ನು ಧೃತರಾಷ್ಟ್ರನಿಗೆ ವರ್ಣಿಸುತ್ತಾ, ಈ ರೀತಿ ಹೇಳುತ್ತಾನೆ: "ಇಡೀ ಬ್ರಹ್ಮಾಂಡದಲ್ಲಿ ತುಂಬಿರುವ ನಮ್ಮ ಇಂದ್ರಿಯಗಳ ಸ್ವಾಮಿ ಗೋವಿಂದನಲ್ಲಿ ನಿದ್ದೆಯನ್ನು ಗೆದ್ದ ಅರ್ಜುನ 'ನಾನು ಯುದ್ಧ ಮಾಡಲಾರೆ' ಎಂದು ಹೇಳಿ ಮೌನಿಯಾದ" ಎಂದು.

ತಮುವಾಚ ಹೃಷೀಕೇಶಃ ಪ್ರಹಸನ್ನಿವ ಭಾರತ ।
ಸೇನಯೋರುಭಯೋರ್ಮಧ್ಯೇ ವಿಷೀದಂತಮಿದಂ ವಚಃ ॥೧೦॥

ತಮ್ ಉವಾಚ ಹೃಷೀಕೇಶಃ ಪ್ರಹಸನ್ ಇವ ಭಾರತ ।
ಸೇನಯೋಃ ಉಭಯೋಃ ಮಧ್ಯೇ ವಿಷೀದಂತಮ್ ಇದಮ್ ವಚಃ -ಓ ಭರತ ವಂಶದ ದೊರೆಯೇ, ಎರಡು ಪಡೆಗಳನಡುವೆ ತಳಮಳಗೊಂಡಿರುವ ಅವನನ್ನು ಕುರಿತು ಕೃಷ್ಣ ಮೆಲುನಗುತ್ತಾ ಈ ಮಾತು ನುಡಿದ.

ಅರ್ಜುನ ಸಂಪೂರ್ಣ ಶರಣಾಗಿ ತನ್ನಮುಂದೆ ಅಂಗಲಾಚಿ ನಿಂತಾಗ, ಶ್ರೀಕೃಷ್ಣ ನಸುನಗುತ್ತಾ ತನ್ನ ಮಾತನ್ನು ಆರಂಭಿಸುತ್ತಾನೆ. ಇಲ್ಲಿ ಅರ್ಜುನ ಕೃಷ್ಣ ಹೇಳುವುದನ್ನು ಸ್ವೀಕರಿಸುವ ಹಂತವನ್ನು ತಲುಪಿದ್ದಾನೆ. ಆತನಲ್ಲಿ ಭಾವಾವೇಶ ಹೊರಟುಹೋಗಿ ಶರಾಣಗತಿ ಬಂದಿದೆ. ಭಗವಂತ ನಮಗೆ ಮಾರ್ಗದರ್ಶನ ಮಾಡಬೇಕಾದರೆ ನಾವು ನಮ್ಮ ಅಹಂಕಾರವನ್ನು ತೊರೆದು, ಆತನಲ್ಲಿ ಸಂಪೂರ್ಣ ಶರಣಾಗಬೇಕು. ಆಗ ಖಂಡಿತ ನಮಗೆ ಮಾರ್ಗದರ್ಶನ ಸಿಗುತ್ತದೆ. ಇಲ್ಲಿ ಕೃಷ್ಣ ಅರ್ಜುನನಿಗೆ ಮಾಡುವ ಉಪದೇಶ ನಮ್ಮೆಲ್ಲರಿಗೆ ಆತ ಮಾಡಿದ ಉಪದೇಶ. ಈ ಅಂಶವನ್ನು ಮನಸ್ಸಿನಲ್ಲಿಟ್ಟುಕೊಂಡು ಕೃಷ್ಣನ ಉಪದೇಶವನ್ನು ಆಲಿಸೋಣ ಬನ್ನಿ.

ಭಗವಾನುವಾಚ ।
ಅಶೋೇಚ್ಯಾನನ್ವಶೋಚಸ್ತ್ವಂ ಪ್ರಜ್ಞಾವಾದಾಂಶ್ಚ ಭಾಷಸೇ ।
ಗತಾಸೂನಗತಾಸೂಂಶ್ಚ ನಾನುಶೋಚಂತಿ ಪಂಡಿತಾಃ ॥೧೧॥

ಭಗವಾನ್ ಉವಾಚ-ಭಗವಂತ ಹೇಳಿದನು:
ಅಶೋಚ್ಯಾನ್ ಅನ್ವಶೋಚಃ ತ್ವಮ್ ಪ್ರಜ್ಞಾವಾದಾನ್ ಚ ಭಾಷಸೇ ।
ಗತ ಅಸೂನ್ ಅಗತ ಅಸೂನ್ ಚ ನ ಅನುಶೋಚಂತಿ ಪಂಡಿತಾಃ -ಅಳಬಾರದವರಿಗಾಗಿ ನೀನು ಅಳುತ್ತಿರುವೆ. ತಿಳಿದವರು ಆಡದಂತಹ ಮಾತುಗಳನ್ನು ತೋಚಿದಂತೆ ಆಡುತ್ತಿರುವೆ. ಅಳಿದವರ ಬಗೆಗಾಗಲೀ, ಅಳಿಯದವರ ಬಗೆಗಾಗಲೀ, ತಿಳಿದವರು ಅಳುವುದಿಲ್ಲ.

ಇದು ಭಗವಂತನ ಉಪದೇಶದ ಮೊದಲ ನುಡಿ. ಇದು ಇಡೀ ಗೀತೆಗೆ ಪಂಚಾಂಗ ರೂಪದಲ್ಲಿದೆ. ಇಲ್ಲಿ ಕೃಷ್ಣ ಅರ್ಜುನನಿಗೆ ಹೇಳುತ್ತಾನೆ: "ಯಾರಿಗೋಸ್ಕರ ಅಳಬಾರದೋ ಅಂತವರಿಗೋಸ್ಕರ ಅಳುತ್ತಿರುವೆ. ತುಂಬಾ ತಿಳಿದ ಮಹಾಜ್ಞಾನಿಯಂತೆ ಮಾತನಾಡುತ್ತಿರುವೆ" ಎಂದು. ಇದು ಅರ್ಜುನನ ದೌರ್ಬಲ್ಯಕ್ಕೆ ಕೃಷ್ಣ ಹಿಡಿದ ಕನ್ನಡಿ. ಇಲ್ಲಿ 'ನಿನಗೇನೂ ತಿಳಿದಿಲ್ಲ' ಎನ್ನುವ ಭಾವ ಕೂಡಾ ಸ್ಪಷ್ಟವಾಗಿದೆ. ಅರ್ಜುನನಿಗೆ ಕಾಡಿರುವುದು ಕೆಲವರು(ಗುರು-ಹಿರಿಯರು) ಸಾಯುತ್ತಾರೆ ಇನ್ನು ಕೆಲವರು(ದುಷ್ಟರು) ಬದುಕುತ್ತಾರಲ್ಲಾ ಎನ್ನುವ ಭಯ-ಅದರಿಂದಾಗಿ ದುಃಖ. ದುಃಖಕ್ಕೆ ಮೂಲ ಭಯ-ಭಯಕ್ಕೆ ಮೂಲ ಅಜ್ಞಾನ.
ಇಲ್ಲಿ ನಿಮಗೊಂದು ಪ್ರಶ್ನೆ ಬರಬಹುದು. ಭೀಷ್ಮ ದ್ರೋಣರಂತಹ ಮಹಾತ್ಮರು ಸತ್ತರೆ ಅಳುವುದು ತಪ್ಪೇ? ಈ ಪ್ರಶ್ನೆಗೆ ಉತ್ತರ ಸಿಗಬೇಕಾದರೆ ನಾವು ಹುಟ್ಟು ಸಾವಿನ ಗುಟ್ಟನ್ನು ಅರಿತಿರಬೇಕು. ಹುಟ್ಟು ಸಾವಿನ ಇನ್ನೊಂದು ಆಯಾಮ ತಿಳಿದಾಗ ನಮಗೆ ಈ ಪ್ರಶ್ನೆಗೆ ಉತ್ತರ ಸಿಗುತ್ತದೆ. ಜೀವ ಅನಾದಿನಿತ್ಯ; ಅದಕ್ಕೆಂದೂ ಸಾವಿಲ್ಲ. ಈ ಭೌತಿಕ ಶರೀರ ಜೀವಕ್ಕೆ ಒಂದು ಪಂಜರದಂತೆ. ಈ ಪಂಜರದಲ್ಲಿ ಸಿಕ್ಕಿ ಹಾಕಿಕೊಳ್ಳುವುದು ಹುಟ್ಟು. ಪಂಜರದಿಂದ

ಹೊರ ಹೋಗುವುದು ಸಾವು. ಈ ಆಯಾಮದಲ್ಲಿ ನೋಡಿದರೆ ಹೊಸ ಅಂಗಿ ತೊಡುವುದು ಹುಟ್ಟು-ಹಳೆ ಅಂಗಿ ತೊರೆಯುವುದು ಸಾವು. ಈ ಜ್ಞಾನ ನಮಗಿದ್ದರೆ ನಮಗೆ ಸಾವಿನ ಭಯವಿರುವುದಿಲ್ಲ.

ಇಲ್ಲಿ ಕೃಷ್ಣ ಹೇಳುತ್ತಾನೆ: "ಜ್ಞಾನಿಗಳು ಆಡುವ ಮಾತನ್ನು ನೀನು ಆಡುತ್ತಿಲ್ಲ" ಎಂದು. ಏಕೆಂದರೆ ಜ್ಞಾನಿಗಳು ಹುಟ್ಟು-ಸಾವಿನ ಮರ್ಮವನ್ನು ಚೆನ್ನಾಗಿ ಅರಿತಿರುತ್ತಾರೆ. ನೀನು ಆಡುತ್ತಿರುವುದು ತಿಳುವಳಿಕೆಯ ಮಾತಲ್ಲ. ನಿನ್ನ ತಿಳುವಳಿಕೆಯೇ ವಿಶ್ವದ ಸತ್ಯ ಎನ್ನುವ ಭ್ರಮೆಯಿಂದ ನೀನು ಮಾತನಾಡುತ್ತಿದ್ದೀಯ ಎನ್ನುತ್ತಾನೆ ಕೃಷ್ಣ.

ಇಲ್ಲಿ ಕೃಷ್ಣ ಅರ್ಜುನ ಹಾಕಿದ ಎಲ್ಲಾ ಲೌಕಿಕ ಪ್ರಶ್ನೆಗಳನ್ನು ಬಿಟ್ಟು ಅವನಿಗೆ ಸತ್ಯದ ಸಾಕ್ಷಾತ್ಕಾರ ಮಾಡಿಸುತ್ತಿದ್ದಾನೆ. ಅರ್ಜುನ ಕಂಡಿದ್ದು ಕೇವಲ ಐಹಿಕ ಪ್ರಪಂಚವಾದರೆ, ಕೃಷ್ಣ ಆತನಿಗೆ ಅದರಾಚೆಗಿನ ಸತ್ಯದ ಇನ್ನೊಂದು ಮುಖದ ಪರಿಚಯ ಮಾಡಿಸುತ್ತಿದ್ದಾನೆ.

ಸಾವು ಭಯಾನಕವಲ್ಲ, ಹುಟ್ಟಿ ಬಂದವನಿಗೆ ಸಾವು ಅನಿವಾರ್ಯ. ಆತ್ಮಕ್ಕೆ ಎಂದೂ ಸಾವಿಲ್ಲ. ಆತ್ಮ ಅನಾದಿನಿತ್ಯ. ಆದರೆ ದೇಹ ನಾಶ ಅನಿವಾರ್ಯ. ಮನುಷ್ಯ ತನ್ನ ವಿಕೃತಿಯಿಂದ ಪ್ರಕೃತಿಯೆಡೆಗೆ ಪಯಣಿಸುವ ಕ್ರಿಯೆ ಸಾವು. ಆದ್ದರಿಂದ ಅಳಿದವರ ಬಗೆಗಾಗಲೀ, ಅಳಿಯದವರ ಬಗೆಗಾಗಲೀ, ತಿಳಿದವರು ಅಳುವುದಿಲ್ಲ ಎನ್ನುವುದನ್ನು ಇಲ್ಲಿ ಕೃಷ್ಣ ಅರ್ಜುನನಿಗೆ ಮನವರಿಕೆ ಮಾಡಿಸುತ್ತಿದ್ದಾನೆ.

ನತ್ವೇವಾಹಂ ಜಾತು ನಾಽಸಂ ನ ತ್ವಂ ನೇಮೇ ಜನಾಧಿಪಾಃ ।
ನಚೈವ ನ ಭವಿಷ್ಯಾಮಃ ಸರ್ವೇ ವಯಮತಃ ಪರಮ್ ॥೧೨॥

ನ ತು ಏವ ಅಹಮ್ ಜಾತು ನ ಅಸಮ್ ನ ತ್ವಮ್ ನ ಇಮೇ ಜನ ಅಧಿಪಾಃ ।
ನ ಚ ಏವ ನ ಭವಿಷ್ಯಾಮಃ ಸರ್ವೇ ವಯಮ್ ಅತಃ ಪರಮ್-- ನಾನು ಹಿಂದೆ ಎಂದೂ ಇರದಿದ್ದವನಲ್ಲ. ಅಲ್ಲ ನೀನೂ. ಅಲ್ಲ ಈ ಅರಸರೂ. ಇನ್ನು ಮುಂದೂ ನಾವೆಂದೂ ಇಲ್ಲವಾಗುವವರಲ್ಲ.

ಕೃಷ್ಣ ಇಲ್ಲಿ ಸಾವಿನ ಬಗ್ಗೆ ನಾವು ಏಕೆ ಚಿಂತಿಸಬೇಕಿಲ್ಲ ಎನ್ನುವ ಮಾತಿಗೆ ಪೂರಕವಾಗಿ, ಅದನ್ನು ಸಮರ್ಥಿಸುವ ಮಾತನ್ನು ಹೇಳುತ್ತಾನೆ. ಆತ ಹೇಳುತ್ತಾನೆ: "ನಾನು-ನೀನು ಈ ಎಲ್ಲಾ ರಾಜರು, ಹಿಂದೆ ಇದ್ದೆವು, ಇಂದು ಇದ್ದೇವೆ ಹಾಗೂ ಮುಂದೆ ಕೂಡಾ ಇರುತ್ತೇವೆ. ದೇಹ ನಾಶವಾದಾಗ ಜೀವ ನಾಶವಾಗುವುದಿಲ್ಲ. ನಾನು ಹೇಗೆ ಅನಾದಿನಿತ್ಯವೋ ಹಾಗೇ ಪ್ರತಿಯೊಂದು ಜೀವರು ಕೂಡಾ ಅನಾದಿನಿತ್ಯ. ಆತ್ಮವನ್ನು ಕೊಲ್ಲುವುದು ಅಸಾಧ್ಯ" ಎಂದು. ಅನಂತ ಜೀವದ ಹರವು ಅನಂತ ಕಾಲದ ತನಕ ನಿರಂತರವಾಗಿರುತ್ತದೆ. ಆತ್ಮ ಎಂದೆಂದಿಗೂ ಅಜರಾಮರ. ಪ್ರತಿಯೊಂದು ಜೀವಕ್ಕೆ ಅದರದ್ದೇ ಆದ ಸ್ವಭಾವವಿದೆ. ಜೀವ ಒಂದು ಬೀಜದಂತೆ. ಭಗವಂತ ಒಬ್ಬ ತೋಟಗಾರನಂತೆ. ಆತ ಈ ಪ್ರಪಂಚವೆಂಬ ತೋಟದ ಸೃಷ್ಟಿ ಮಾಡಿ, ಈ ಜೀವವನ್ನು ಆ ತೋಟದಲ್ಲಿ ಬಿತ್ತಿ ಅದಕ್ಕೊಂದು ಅಸ್ತಿತ್ವವನ್ನು ಕೊಟ್ಟ. ಪ್ರತಿಯೊಂದು ಜೀವ ಅದರ ಸ್ವಭಾವಕ್ಕನುಗುಣವಾಗಿ ಈ ಪ್ರಪಂಚದಲ್ಲಿ ಬೆಳೆಯುತ್ತವೆ. ಒಂದು ಜೀವದ ಸ್ವಭಾವ ಇನ್ನೊಂದು ಜೀವದ ಸ್ವಭಾವಕ್ಕಿಂತ ಭಿನ್ನ. ಈ ಕಾರಣದಿಂದಾಗಿ ಈ ಪ್ರಪಂಚ ಇಷ್ಟೊಂದು ವೈವಿಧ್ಯಪೂರ್ಣ.

ದೇಹಿನೋSಸ್ಮಿನ್ ಯಥಾ ದೇಹೇ ಕೌಮಾರಂ ಯೌವನಂ ಜರಾ ।
ತಥಾ ದೇಹಾಂತರಪ್ರಾಪ್ತಿರ್ಧೀರಸ್ತತ್ರ ನ ಮುಹ್ಯತಿ ॥೧೩॥

ದೇಹಿನಃ ಅಸ್ಮಿನ್ ಯಥಾ ದೇಹೇ ಕೌಮಾರಮ್ ಯೌವನಮ್ ಜರಾ ।
ತಥಾ ದೇಹಾಂತರ ಪ್ರಾಪ್ತಿ ಧೀರಃ ತತ್ರ ನ ಮುಹ್ಯತಿ–ದೇಹದಲ್ಲಿರುವ ಜೀವಕ್ಕೆ ಈ ದೇಹದಲ್ಲೇ ಎಳೆತನ, ಹರಯ, ಮುಪ್ಪು ಹೇಗೇ-ಹಾಗೇ ದೇಹದ ಬದಲಾವಣೆ ಕೂಡಾ. ಇಂತಹ ಸನ್ನಿವೇಶದಲ್ಲಿ ಧೀರನಾದವನು ಕಂಗೆಡುವುದಿಲ್ಲ.

ದೇಹ ನಾಶವೆಂದರೆ ಸ್ವರೂಪ ನಾಶವಲ್ಲ. ಈ ದೇಹದಲ್ಲಿರುವ ಜೀವ ಪ್ರತೀಕ್ಷಣದಲ್ಲಿ ತನ್ನ ದೇಹ ಪರಿವರ್ತನೆಯನ್ನು ಅನುಭವಿಸುತ್ತಿರುತ್ತದೆ. ಬಾಲ್ಯದಲ್ಲಿನ ದೇಹ ಯೌವನದಲ್ಲಿಲ್ಲ, ಯೌವನದಲ್ಲಿನ ದೇಹ ಮುಪ್ಪಿನಲ್ಲಿಲ್ಲ. ಸತ್ತ ಬಳಿಕ ಮತ್ತೆ ಮರುಹುಟ್ಟಿನೊಂದಿಗೆ ಹೊಸ ದೇಹ. ಆದರೆ ನಮಗೆ ನಾವು ಎಲ್ಲಿಂದ ಬಂದೆವು ಹಾಗೂ ಎಲ್ಲಿಗೆ ಹೋಗುತ್ತಿದ್ದೇವೆ ಎನ್ನುವ ಅರಿವು ಮಾತ್ರ ಇಲ್ಲ. ನಮಗೆ ತಿಳಿದಿರುವುದು ನಮ್ಮ ಈಗಿನ ಅಸ್ತಿತ್ವ ಮಾತ್ರ. ದೇಹ ನಾಶವಾಗಿ ಹೊಸ ದೇಹ ಬರಬಹುದು. ಆದರೆ ಎಂದೂ ನಾಶವಾಗದ ಚೈತನ್ಯ ಈ 'ಜೀವ'. ಒಂದು ದಿನ ನಾಶವಾಗುವ ಈ ದೇಹದ ಬಗ್ಗೆ ಧೀರನಾದವನು ಎಂದೂ ಅಳುವುದಿಲ್ಲ ಎನ್ನುತ್ತಾನೆ ಕೃಷ್ಣ. ಇಲ್ಲಿ ಧೀರ ಎಂದರೆ ಅರಿವಿನ ಆನಂದವನ್ನು ಅನುಭವಿಸುವ ಜ್ಞಾನಿ(ಧೀ+ರಃ). ಎಲ್ಲಿ ಜ್ಞಾನವಿದೆಯೋ ಅಲ್ಲಿ ದುಃಖವಿಲ್ಲ.

ಮಾತ್ರಾಸ್ಪರ್ಶಾಸ್ತು ಕೌಂತೇಯ ಶೀತೋಷ್ಣಸುಖದುಃಖದಾಃ ।
ಆಗಮಾಪಾಯಿನೋSನಿತ್ಯಾಸ್ತಾಂಸ್ತಿತಿಕ್ಷಸ್ವ ಭಾರತ ॥೧೪॥

ಮಾತ್ರಾ ಸ್ಪರ್ಶಾಃ ತು ಕೌಂತೇಯ ಶೀತ ಉಷ್ಣ ಸುಖ ದುಃಖ ದಾಃ ।
ಆಗಮ ಅಪಾಯಿನಃ ಅನಿತ್ಯಾಃ ತಾನ್ ತಿತಿಕ್ಷಸ್ವ ಭಾರತ -- ಕೌಂತೇಯ, ವಿಷಯ ಸಂಪರ್ಕಗಳೇ ತಂಪು-ಬಿಸಿಗಳ, ಸುಖ-ದುಃಖಗಳ ಅನುಭವ ನೀಡುವಂಥವು. ಇವು ಬಂದು ಹೋಗುವಂಥವು. ನಿರಂತರವಾಗಿ ಇರುವಂಥವಲ್ಲ. ಓ ಭಾರತಾ, ಅವುಗಳನ್ನು ಸಹಿಸಿಕೋ.

ನಾವು ಬಾಲ್ಯದ ದೇಹವನ್ನು ಕಳೆದುಕೊಂಡು ಯೌವನದ ದೇಹವನ್ನು ಪಡೆಯುತ್ತೇವೆ. ಯೌವನದ ದೇಹವನ್ನು ಕಳೆದುಕೊಂಡು ಮುಪ್ಪಿನ ದೇಹವನ್ನು ಪಡೆಯುತ್ತೇವೆ. ಈ ಕಾರಣಕ್ಕಾಗಿ ಯಾರೂ ದುಃಖಿಸುವುದಿಲ್ಲ. ಆದರೆ ಸಾವಿನಲ್ಲಿ 'ಕಾಣುವ' ಇನ್ನೊಂದು ದೇಹ ಇಲ್ಲವಾಗುತ್ತದೆ-ಆಗ ದುಃಖ. ಯಾವ ದೇಹದ ಮೂಲಕ ಭಾಂದವ್ಯದ ನಂಟನ್ನು ಬೆಳೆಸಿಕೊಂಡಿರುತ್ತೇವೋ , ಅದು ಇಲ್ಲವಾಗುತ್ತದಲ್ಲಾ ಎನ್ನುವ ದುಃಖ ಸಾಮಾನ್ಯವಾಗಿ ನಮ್ಮನ್ನು ಕಾಡುತ್ತದೆ.

ಜೀವನದಲ್ಲಿ ನಾವು ಅನುಭವಿಸುವ ಸುಖ ಮತ್ತು ದುಃಖದ ಮೂಲ "ಮಾತ್ರಾ ಸ್ಪರ್ಶಾ". ಇದು ಎಲ್ಲವುದರ ಮೂಲ. ನಾವು ಯಾವುದನ್ನು ನಮ್ಮ ಇಂದ್ರಿಯಗಳ ಮೂಲಕ ಗ್ರಹಿಸುತ್ತೇವೋ ಅದು ಮಾತ್ರೆ. ಶಬ್ದ, ಸ್ಪರ್ಶ, ರೂಪ, ರಸ, ಗಂಧ ಇವೇ ನಮ್ಮ ಸುಖ-ದುಃಖಗಳಿಗೆ ಕಾರಣವಾದ ಐದು ಮಾತ್ರೆಗಳು.

ಸುಖ-ದುಃಖಗಳಿಗೆ ಒಂದು ವ್ಯವಸ್ಥೆ ಇಲ್ಲ. ಒಬ್ಬರಿಗೆ ಸುಖವಾದದ್ದು ಇನ್ನೊಬ್ಬರಿಗೆ ದುಃಖವಾಗಬಹುದು. ವಿಷಯಗಳ ಸ್ಪರ್ಶದಿಂದ ಸುಖ-ದುಃಖ ಬರುತ್ತದೆ. ಅದು ಶೀತೊಷ್ಣದಂತೆ. ಮೊದಲು ಸುಖಕೊಟ್ಟ ವಸ್ತುವೇ ಮುಂದೆ ದುಃಖವಾಗಿ ಪರಿಣಮಿಸಬಹುದು. ಸುಖ-ದುಃಖ ಜೀವದ ಧರ್ಮವಲ್ಲ. ಅದು ಬಂದು ಹೋಗುವಂತಾದ್ದು. ಅದು ನಮ್ಮ ಮಾನಸಿಕ ಕಲ್ಪನೆಯ ಫಲ. "ನನ್ನ" ಎನ್ನುವುದು ದುಃಖಕ್ಕೆ ಮೂಲ ಕಾರಣ. ನಿದ್ದೆಯಲ್ಲಿ ನಮಗೆ "ನನ್ನ" ಎನ್ನುವುದು ಇಲ್ಲ. ಆದ್ದರಿಂದ ಎಂದೂ ನಿದ್ದೆಯಲ್ಲಿ ದುಃಖವಿಲ್ಲ. ಎಚ್ಚರ ಮತ್ತು ಕನಸಿನಲ್ಲಿ ಮಾತ್ರ ಈ ಸಮಸ್ಯೆ. ನಿದ್ದೆಯಲ್ಲಿ ಎಲ್ಲವೂ ನಿರ್ಮಲ.

ನಾವೇ ನಮ್ಮ ಮಾನಸಿಕ ಭಾವನೆಗಳಿಂದ ಮತ್ತು ಅನುಭವಗಳಿಂದ ನಿರ್ಮಿಸಿಕೊಂಡಿರುವುದು ಈ ಸುಖ-ದುಃಖ. ಇದರಿಂದ ಪಾರಾಗುವ ಉಪಾಯವನ್ನು ನಾವೇ ಕಲಿತುಕೊಳ್ಳಬೇಕು. ದುಃಖದ ಮೂಲದ ಅನ್ವೇಷಣೆ ಮಾಡಿದಾಗ ದುಃಖ ಸಹ್ಯವಾಗುತ್ತದೆ. ನಾವು ನಮ್ಮ ಭಾವನೆಗಳನ್ನು ಸಹನೆ ಮಾಡಿಕೊಳ್ಳುವುದನ್ನು ಕಲಿತುಕೊಳ್ಳಬೇಕು. ಯಾವುದು ಬಂತೋ ಅದನ್ನು ಸ್ವೀಕರಿಸುವುದನ್ನು ಕಲಿತುಕೊಳ್ಳಬೇಕು. ನನಗೆ 'ಅದೇ ಬೇಕು'; 'ಹೀಗೇ ಆಗಬೇಕು' ಎನ್ನುವ ಚಿಂತನೆ ದುಃಖಕ್ಕೆ ಮೂಲ ಕಾರಣ. ಬಂದಿದ್ದನ್ನು ಬಂದಂತೆ ಎದುರಿಸುತ್ತೇನೆ ಎನ್ನುವ ಆತ್ಮಸ್ಥೈರ್ಯವಿದ್ದರೆ ದುಃಖವಿಲ್ಲ.

ಯಂ ಹಿ ನ ವ್ಯಥಯಂತ್ಯೇತೇ ಪುರುಷಂ ಪುರುಷರ್ಷಭ ।
ಸಮದುಃಖಸುಖಂ ಧೀರಂ ಸೋಽಮೃತತ್ವಾಯ ಕಲ್ಪತೇ ॥೧೫॥

ಯಂ ಹಿ ನ ವ್ಯಥಯಂತಿ ಏತೇ ಪುರುಷಂ ಪುರುಷ ಋಷಭ ।
ಸಮ ದುಃಖ ಸುಖಮ್ ಧೀರಮ್ ಸಃ ಅಮೃತತ್ವಾಯ ಕಲ್ಪತೇ--ಓ ಗಂಡುಗಲಿಯೇ, ಯಾವ ಶರೀರವನ್ನು[ಜ್ಞಾನಿಯನ್ನು] ಇವು ಕಾಡಲಾರವೋ, ಅವನು ಸುಖ-ದುಃಖವನ್ನು ಸಮನಾಗಿ ಕಾಣಬಲ್ಲ ಧೀರ. ಅಂತವನು ಸಾವಿಲ್ಲದ ತಾಣವನ್ನು ಸೇರಲು ತಕ್ಕವನಾಗುತ್ತಾನೆ.

ಕೃಷ್ಣ ಮುಂದುವರಿದು ಹೇಳುತ್ತಾನೆ: "ಯಾವ ಪುರುಷನಿಗೆ 'ಮಾತ್ರಾ ಸ್ಪರ್ಶ' ಕಾಡುವುದಿಲ್ಲವೋ ಅವನು ಸುಖ-ದುಃಖವನ್ನು ಸಮನಾಗಿ ಕಾಣಬಲ್ಲ ಧೀರ" ಎಂದು. ಇಲ್ಲಿ "ಪುರುಷ" ಎನ್ನುವ ಪದ ಬಂದಿದೆ. 'ಪುರುಷ ಎಂದರೆ ಗಂಡಸು; ಗಂಡಸರಿಗೆ ಮಾತ್ರ ಸಾಧನೆ-ಮೋಕ್ಷ'-ಎನ್ನುವ ಮೂಢನಂಬಿಕೆ ನಮ್ಮಲ್ಲಿದೆ. ಆದರೆ ಪುರುಷ ಎಂದರೆ 'ಪುರದಲ್ಲಿ ಇರುವ ಜೀವ'. ಪುರ ಎಂದರೆ ಪೂರ್ಣವಾದ ದೇಹ. ಅಂದರೆ ಮಾನವ ದೇಹ. ಆದ್ದರಿಂದ ಪುರುಷ ಎಂದರೆ ಮಾನವರು(**Human being**) ಅಥವಾ ಸಾಧಕ ಜೀವ. ಸ್ಥೂಲ ಶರೀರದಲ್ಲಿದ್ದೂ ಕೂಡಾ ಯಾರಿಗೆ ಮಾತ್ರಾಸ್ಪರ್ಶದಿಂದ ಬರುವ ಸುಖ-ದುಃಖ ಬೇರೆ-ಬೇರೆಯಾಗಿ ಕಾಣುವುದಿಲ್ಲವೋ, ಆತ ಸುಖ ದುಃಖವನ್ನು ಸಮನಾಗಿ ಕಾಣಬಲ್ಲ ಧೀರನೆನಿಸುತ್ತಾನೆ.

ಪುರುಷ ಎನ್ನುವುದಕ್ಕೆ ಇನ್ನೊಂದು ಅರ್ಥ 'ಎಲ್ಲಕ್ಕಿಂತ ದೊಡ್ಡವನಾದ ದೇವರನ್ನು ತಿಳಿದವ'. ನಮಗೆ ಸುಖ-ದುಃಖ ಏಕೆ ಬರುತ್ತದೆ ಎನ್ನುವ ಜ್ಞಾನವಿದ್ದಾಗ, ನಾವು ಸುಖ ಬಂದಾಗ ಹಿಗ್ಗುವುದಿಲ್ಲ, ದುಃಖ ಬಂದಾಗ ಕುಗ್ಗುವುದಿಲ್ಲ. ನಮ್ಮ ಜೀವನದಲ್ಲಿ ಬರುವ ಪ್ರತಿಯೊಂದು ಸುಖ-ದುಃಖಕ್ಕೂ ಒಂದು ಕಾರಣವಿದೆ. ಸುಖ-ದುಃಖ ಜೀವನದಲ್ಲಿ ಬರುವ ಅಲೆಗಳು. ಇದರಲ್ಲಿ ಒಂದು ಬೇಕು, ಇನ್ನೊಂದು ಬೇಡ ಎನ್ನುವ ಆಯ್ಕೆ ಸರಿಯಲ್ಲ. ಯಾವುದು ಬಂತೋ ಅದಿರಲಿ ಎಂದು ಬದುಕಬೇಕು. ನಮಗೆ ಸುಖ-ದುಃಖವನ್ನು ಇನ್ನೊಬ್ಬರು ದ್ವೇಷದಿಂದ ಕೊಡುವುದಲ್ಲ. ಅದು ನಮ್ಮ ಕರ್ಮ ಫಲ. ಸುಖ-ದುಃಖವನ್ನು ನಮಗೆ ಕೊಡುವವನು ಭಗವಂತ. ತಾಯಿ ತನ್ನ ಮಗುವಿನ ಉದ್ಧಾರಕ್ಕಾಗಿ ಹೇಗೆ ಶಿಕ್ಷೆ ಕೊಡುತ್ತಾಳೋ, ಹಾಗೇ ಭಗವಂತ ನಮ್ಮ ಉದ್ಧಾರಕ್ಕಾಗಿ ನಮಗೆ ದುಃಖವನ್ನು ಕೊಡುತ್ತಾನೆ. ಇದು ಶಿಕ್ಷೆ ಅಲ್ಲ-ಶಿಕ್ಷಣ. ಮನುಷ್ಯ ದುಃಖದಲ್ಲಿ ಬೆಳೆದಾಗ ಗಳಿಸುವ ಅನುಭವ ಎಂದೂ ಸುಖದಲ್ಲಿ ಗಳಿಸಲಾರ. ದುಃಖ ಜೀವನದ ನಿಜವಾದ ಅನುಭವ. ಇದು ನಮಗೆ ಕೊಡುವ ದುಃಖದ ಹಿಂದೆ ಭಗವಂತನಿಟ್ಟ ಮಹಾ ಕಾರುಣ್ಯ. ಈ ಜ್ಞಾನವಿದ್ದಾಗ ಮಾತ್ರ ನಮಗೆ ಸುಖ-ದುಃಖವನ್ನು ಏಕರೂಪದಲ್ಲಿ ಕಾಣುವ ಮನಃಸ್ಥಿತಿ ಬರುತ್ತದೆ. ಇಂತಹ ಜ್ಞಾನವಿರುವವನು ಧೀರನಾಗುತ್ತಾನೆ. ತಿಳುವಳಿಕೆಯಿಂದ ಧೈರ್ಯ ಬರುತ್ತದೆ. ಯಾರು ಒಂದು ಜನ್ಮದಲ್ಲಿ ಸುಖ-ದುಃಖವನ್ನು ಸಮನಾಗಿ ಕಾಣಬಲ್ಲ ತಿಳುವಳಿಕೆ ಹಾಗೂ ಧೈರ್ಯವನ್ನು ಗಳಿಸುತ್ತಾರೋ, ಅವರು ಮುಂದೆಂದೂ ಈ ಸಂಸಾರ ಬಂಧದಲ್ಲಿ ಮರಳಿ ಹುಟ್ಟುವುದಿಲ್ಲ. ಇಂತಹ ಮಾನಸಿಕ ಸಮತೋಲನದ ಮೂಲಕ ಭಗವಂತನನ್ನು ತಿಳಿದು ಮೋಕ್ಷವನ್ನು ಪಡೆಯುತ್ತಾರೆ.

ನಾಸತೋ ವಿದ್ಯತೇ [ಽ]ಭಾವೋ ನಾಭಾವೋ ವಿದ್ಯತೇ ಸತಃ ।
ಉಭಯೋರಪಿ ದೃಷ್ಟೋಽನ್ತಸ್ತ್ವನಯೋಸ್ತತ್ತ್ವದರ್ಶಿಭಿಃ ॥೧೬॥

ನ ಅಸತಃ ವಿದ್ಯತೇ (ಅ)ಭಾವಃ ನ ಅಭಾವಃ ವಿದ್ಯತೇ ಸತಃ ।
ಉಭಯೋಃ ಅಪಿ ದೃಷ್ಟಃ ಅಂತಃ ತು ಅನಯೋಃ ತತ್ವ ದರ್ಶಿಭಿಃ -- ಪ್ರಕೃತಿಗೂ ಅಳಿವಿಲ್ಲ; ಭಗವಂತನಿಗೂ ಅಳಿವಿಲ್ಲ. [ಕೆಡುಕು ಮಾಡಿ ಒಳಿತಾಗದು, ಒಳಿತಿನಿಂದ ಕೆಡುಕಾಗದು]. ನಿಜವ ಕಂಡವರು ಈ ಎರಡರ ತೀರ್ಮಾನವನ್ನು ಬಲ್ಲರು.

ಸುಖ-ದುಃಖವನ್ನು ಮೀರಿ ನಿಲ್ಲಬಹುದು. ಅದೊಂದು ಮಾನಸಿಕ ಸ್ಥಿತಿ. ಆದರೆ ಅರ್ಜುನನ ಪ್ರಶ್ನೆ- ತನ್ನ ಗುರು-ಹಿರಿಯರನ್ನು ಕೊಲ್ಲುವುದು ಪಾಪವಲ್ಲವೇ? ಎನ್ನುವುದು. ಈ ಪ್ರಶ್ನೆಗೆ ಇಲ್ಲಿ ಉತ್ತರವಿದೆ. "ಸತ್ತಿನಿಂದ ಅಭಾವವಿಲ್ಲ, ಅಸತ್ತಿನಲ್ಲಿ ಭಾವವಿಲ್ಲ" ಅಂದರೆ ಒಳ್ಳೆಯ ಕೆಲಸ ಮಾಡುವುದರಿಂದ ಎಂದೂ ದುಃಖವಿಲ್ಲ, ಕೆಟ್ಟ ಕೆಲಸ ಮಾಡಿದರೆ ಸುಖವಿಲ್ಲ. ಕೆಲವೊಮ್ಮೆ ಕೆಟ್ಟ ಕೆಲಸ ಮಾಡುವವರು ಸುಖಪಡುತ್ತಿರುವಂತೆ ಭಾಸವಾದರೂ ಕೂಡಾ, ಅದು ತಾತ್ಕಾಲಿಕ. ಅಧರ್ಮದ ಹಾದಿಯನ್ನು ತುಳಿದವ ಎಂದೂ ಯಶಸ್ಸನ್ನು ಕಾಣಲು ಸಾಧ್ಯವಿಲ್ಲ. ಮಹಾಭಾರತ ಯುದ್ಧವನ್ನು ವಿಶ್ಲೇಷಣೆ ಮಾಡಿದರೆ ಅಲ್ಲಿ ಯುದ್ಧಕ್ಕೆ ಕಾರಣರಾದವರು ಪಾಂಡವರಲ್ಲ. ಪಾಂಡವರು ಧರ್ಮ ರಕ್ಷಣೆಯ ಹೊಣೆಗಾರಿಕೆಯಿಂದ ಯುದ್ಧಕ್ಕೆ ಸಜ್ಜಾಗಿರುವುದು. ಇಲ್ಲಿ ಕೃಷ್ಣ ಸ್ಪಷ್ಟವಾಗಿ ಹೇಳುತ್ತಾನೆ: "ಒಳ್ಳೆಯ ಕೆಲಸ ಮಾಡುವಾಗ ಯಾರ ಭಯವೂ ಬೇಡ ಹಾಗೂ ಅದರಿಂದ ದುಃಖವಿಲ್ಲ" ಎಂದು. ಧರ್ಮ ರಕ್ಷಣೆಯ ಹಾದಿಯಲ್ಲಿ

'ನನ್ನವರು' ಎನ್ನುವುದು ಸಲ್ಲದು. ಜಗತ್ತಿನ ತತ್ವವನ್ನು ಸಾಕ್ಷಾತ್ಕಾರ ಮಾಡಿಕೊಂಡ ಜ್ಞಾನಿಗಳು ಕಂಡುಕೊಂಡ ಕೊನೆಯ ಸತ್ಯವಿದು.

ಮಹಾಭಾರತದ ಪ್ರತಿಯೊಂದು ಶ್ಲೋಕಕ್ಕೂ ಹತ್ತು ಅರ್ಥಗಳಿವೆಯಂತೆ. ಮೇಲಿನ ಶ್ಲೋಕವನ್ನು ನಾವು ಇನ್ನೊಂದು ಆಯಾಮದಲ್ಲಿ ನೋಡಿದರೆ- "ನ ಅಸತಃ ಅಭಾವಃ ಸತಃ ಅಭಾವಃ ನ ವಿದ್ಯತಿ" ಅಂದರೆ ಸತ್ತಿಗೂ ಅಭಾವವಿಲ್ಲ ಅಸತ್ತಿಗೂ ಅಭಾವವಿಲ್ಲ ಎಂದರ್ಥ. ಅಸತ್ ಎಂದರೆ ಸ್ಥೂಲ ಪ್ರಪಂಚಕ್ಕೆ ಕಾರಣವಾಗಿರುವ, ಸೂಕ್ಷ್ಮವಾಗಿರುವ ಮೂಲಪ್ರಕೃತಿ. ಪ್ರಕೃತಿ ಅನಾದಿನಿತ್ಯ. ಈ ಪ್ರಕೃತಿಯನ್ನು ಸೃಷ್ಟಿಮಾಡಿದ ಭಗವಂತ(ಪುರುಷ) ಅನಾದಿನಿತ್ಯ. ಪ್ರಕೃತಿ ಮತ್ತು ಪುರುಷನಿಗೆ ಅಧೀನವಾಗಿರುವ ಜೀವ ಕೂಡಾ ಅನಾದಿನಿತ್ಯ. ಜೀವಕ್ಕೆಈ ಸ್ಥೂಲ ದೇಹ ಬರುವ ಮೊದಲೂ ಜೀವ ಇತ್ತು, ಹಾಗೂ ಮುಂದೆ ಕೂಡಾ ಇರುತ್ತದೆ. ಪಾಂಚಭೌತಿಕ ಶರೀರದಲ್ಲಿ ಜೀವ ಕೇವಲ ಅತಿಥಿ. ಹೀಗಿರುವಾಗ ದೇಹಾಭಿಮಾನ ಸಲ್ಲದು.

ಅವಿನಾಶಿ ತು ತದ್ ವಿದ್ಧಿಯೇನ ಸರ್ವಮಿದಂ ತತಮ್ ।
ವಿನಾಶಮವ್ಯಯಸ್ಯಾಸ್ಯ ನ ಕಶ್ಚಿತ್ ಕರ್ತುಮರ್ಹತಿ ॥೧೭॥

ಅವಿನಾಶಿ ತು ತತ್ ವಿದ್ಧಿ ಯೇನ ಸರ್ವಮ್ ಇದಮ್ ತತಮ್ ।
ವಿನಾಶಮ್ ಅವ್ಯಯಸ್ಯ ಆಸ್ಯ ನ ಕಶ್ಚಿತ್ ಕರ್ತುಮ್ ಅರ್ಹತಿ--ಯಾವುದು ಈ ಎಲ್ಲವನ್ನು ವ್ಯಾಪಿಸಿದೆ ಅದು ಅಳಿವಿಲ್ಲದ್ದು ಎಂದು ತಿಳಿ. ಬದಲಾಗದ 'ಅವನ' ಅಳಿವು ಯಾರ ಅಳಿವಿಗೂ ಎಟಕುವುದಲ್ಲ.

ಯಾವುದು ಎಲ್ಲಾ ಕಡೆ ವ್ಯಾಪಿಸಿದೆಯೋ ಅದಕ್ಕೆ ನಾಶವಿಲ್ಲ. ರೂಪಾತ್ಮಕ ಪ್ರಪಂಚದಂತೆ ನಾಮಾತ್ಮಕ ಪ್ರಪಂಚವಿದೆ. ಅದು ನಿತ್ಯ. ಇಲ್ಲಿ ನಾಮಾತ್ಮಕ ಎಂದರೆ 'ಅಕ್ಷರ' ; ಅ ದಿಂದ ಕ್ಷ ತನಕ ಇರುವ ಐವತ್ತೊಂದು ವರ್ಣಗಳು. ಈ ಐವತ್ತೊಂದು ಅಕ್ಷರಗಳೇ ಮೂಲಭೂತವಾಗಿರುವ ಇಡೀ ಶಬ್ದ ಪ್ರಪಂಚ. ಅದು ನಾಶ ಮಾಡಲಾಗದ ತತ್ವ. ಆದ್ದರಿಂದ ಭಗವಂತ, ಪ್ರಕೃತಿ, ಜೀವ ಹಾಗೂ ಈ ಎಲ್ಲಾ ತತ್ವಗಳನ್ನು ಪ್ರತಿಪಾದಿಸುವ ಶಬ್ದ[ವೇದ] ಅನಾದಿನಿತ್ಯ. ಇದನ್ನು ಯಾರಿಂದಲೂ ನಾಶ ಮಾಡಲು ಸಾಧ್ಯವಿಲ್ಲ. ಈ ನಾಮಾತ್ಮಕ ಪ್ರಪಂಚದಲ್ಲಿನ ವೇದ ವಾಙ್ಮಯನಾದ ಭಗವಂತ ಅವಿನಾಶಿ. ಆತನಿಗೆ ಸ್ವರೂಪ ನಾಶ, ದೇಹ ನಾಶ, ದುಃಖಪ್ರಾಪ್ತಿ, ಅಪೂರ್ಣತ್ವ ಇಂತಹ ಯಾವುದೇ ರೀತಿಯ ನಾಶವಿಲ್ಲ. ಆತ ಕಾಲತಃ, ದೇಶತಃ, ಗುಣತಃ ವ್ಯಾಪ್ತನಾಗಿರುವ ಅನಂತ ಸ್ವರೂಪ. ಆತ ಅವ್ಯಯ, ಯಾವ ವಿಕಾರ ಬದಲಾವಣೆಗೆ ಒಳಗಾಗದ, ಅನಾದಿನಿತ್ಯ ಸ್ವರೂಪ.

ಅಂತವಂತ ಇಮೇ ದೇಹಾ ನಿತ್ಯಸ್ಯೋಕ್ತಾಃ ಶರೀರಿಣಃ ।
ಅನಾಶಿನೋಽಪ್ರಮೇಯಸ್ಯ ತಸ್ಮಾದ್ ಯುಧ್ಯಸ್ವ ಭಾರತ ॥೧೮॥

ಅಂತವಂತ ಇಮೇ ದೇಹಾಃ ನಿತ್ಯಸ್ಯ ಉಕ್ತಾಃ ಶರೀರಿಣಃ ।

ಅನಾಶಿನಃ ಅಪ್ರಮೇಯಸ್ಯ ತಸ್ಮಾತ್ ಯುಧ್ಯಸ್ವ ಭಾರತ-- ಅಳಿಯದ ಜೀವಕ್ಕೆ ಅಳಿವ ಈ ದೇಹಗಳ ನಂಟು. ಏತರಿದಲೂ ಅವನಿಗೆ ಅಳಿವಿಲ್ಲ. ಅವನು ಎಲ್ಲೆಡೆ ತುಂಬಿದ ಭಗವಂತನ ಪಡಿಯಚ್ಚು. ಓ ಭಾರತಾ, ಆದ್ದರಿಂದ [ಅಳಿವಿರದ ಅಳವಿಗೆಟುಕದ ಭಗವಂತನ ಪೂಜೆಯೆಂದು] ಹೋರಾಡು.

ಭೌತಿಕ ಶರೀರ ಅಂತವಂತ(ನಾಶವಾಗುವಂತಾದ್ದು). ಕೇವಲ ಕಣ್ಣಿಗೆ ಕಾಣುವ ಸ್ಥೂಲ ಶರೀರ ಮಾತ್ರ ನಾಶವಾಗುವುದೇ ಹೊರತು ಆತ್ಮವಲ್ಲ. ಏಕೆಂದರೆ ಜೀವ ಭಗವಂತನ ಪಡಿಯಚ್ಚು. ಅದು ಸರ್ವವ್ಯಾಪಿ ಭಗವಂತನ ಪ್ರತಿಬಿಂಬ. ಆದ್ದರಿಂದ ಎಲ್ಲಾ ಕಡೆ ಇರುವ ಭಗವಂತನ ಪ್ರತಿಬಿಂಬವಾದ ಈ ಜೀವ ನಿತ್ಯ. ಇಲ್ಲಿ ಕೃಷ್ಣ ಅರ್ಜುನನಿಗೆ ಹೇಳುತ್ತಾನೆ: "ಸಾಮ್ರಾಟನಾಗಬೇಕು ಎನ್ನುವ ಸ್ವಾರ್ಥದಿಂದಾಗಲೀ, ದುರ್ಯೋಧನನ ಮೇಲಿನ ದ್ವೇಷದಿಂದಾಗಲೀ ಹೋರಾಡದೇ, 'ಅನ್ಯಾಯದ ವಿರುದ್ಧ ಹೋರಾಟ ಭಗವಂತನ ಪೂಜೆ' ಎಂಬಂತೆ ಯುದ್ಧ ಮಾಡು" ಎಂದು.

ನಾವು ನಮ್ಮ ದೈನಂದಿನ ಜೀವನದಲ್ಲಿ ಮಾಡುವ ಪ್ರತಿಯೊಂದು ಕರ್ಮ ಕೂಡಾ ಹೀಗೆ. ಅದು ಭಗವಂತನ ಅರ್ಪಣಾ ರೂಪದಲ್ಲಿರಬೇಕು. ನಮಗೆ ದೇಹ ಕೊಟ್ಟಿದ್ದು ಭಗವಂತ. ಆದ್ದರಿಂದ ಆ ದೇಹ ಹೋದಾಗ ಅಳುವ ಅಗತ್ಯವಿಲ್ಲ. ನಮ್ಮ ಪ್ರತಿಯೊಂದು ಕರ್ತವ್ಯವನ್ನು ಭಗವಂತನ ಪೂಜೆ ಎಂದು ಮಾಡಿ, ಸಾವಿಗೆ ಅಂಜದೆ ಬದುಕಿದಾಗ ಈ ಜೀವನ ಸಾರ್ಥಕ.

ಯ ಏನಂ ವೇತ್ತಿ ಹಂತಾರಂ ಯಶ್ಚೈನಂ ಮನ್ಯತೇ ಹತಮ್ ।
ಉಭೌ ತೌ ನ ವಿಜಾನೀತೋ ನಾಯಂ ಹಂತಿ ನ ಹನ್ಯತೇ ॥೧೯॥

ಯಃ ಏನಮ್ ವೇತ್ತಿ ಹಂತಾರಮ್ ಯಃ ಚ ಏನಮ್ ಮನ್ಯತೇ ಹತಮ್ ।
ಉಭೌ ತೌ ನ ವಿಜಾನೀತಃ ನ ಅಯಮ್ ಹಂತಿ ನ ಹನ್ಯತೇ --ಯಾರು ಇವನನ್ನು 'ಕೊಲ್ಲುವವನು' ಎಂದು ತಿಳಿದಿದ್ದಾನೊ ಮತ್ತು ಯಾರು ಇವನನ್ನು 'ಸತ್ತವನು' ಎಂದು ತಿಳಿದಿದ್ದಾನೊ-ಆ ಇಬ್ಬರೂ ತಿಳಿದವರಲ್ಲ. ಇವನು ಕೊಲ್ಲುವುದಿಲ್ಲ ಮತ್ತು ಸಾಯುವುದಿಲ್ಲ.

ಜೀವವನ್ನು ಕೊಲ್ಲಬಹುದು/ಕೊಲ್ಲುತ್ತೇನೆ ಎಂದು ಭಾವಿಸುವವರಿಗೆ ಹಾಗೂ ಅದು ನಾಶವಾಯಿತು/ಕೊಲ್ಲಲ್ಪಟ್ಟಿತು ಎನ್ನುವವರಿಗೆ ತಿಳುವಳಿಕೆ ಇಲ್ಲ. ಏಕೆಂದರೆ ಜೀವ ಕೊಲ್ಲುವುದೂ ಇಲ್ಲ, ಕೊಲ್ಲಲ್ಪಡುವುದೂ ಇಲ್ಲ. ಆತ್ಮವನ್ನು ಕೊಲ್ಲುವುದು ಸಾಧ್ಯವೇ ಇಲ್ಲ. ನಮಗೆ ಸಾಯುವುದು ಅಥವಾ ಸತ್ತಿತು ಎಂದು ಕಾಣುವುದು ಭೌತಿಕ ಶರೀರ ಮಾತ್ರ. ಜೀವನಿಗೆ ದೇಹದ ಮೂಲಕ ಕೂಡಾ ಕೊಲ್ಲುವ ಅಥವಾ ಸಾಯುವ ಸ್ವಾತಂತ್ರ್ಯ ಇಲ್ಲ. ಇಲ್ಲಿ ಅರ್ಜುನನಿಗೆ 'ಕೌರವರು ನನ್ನ ಕೈಯಿಂದ ಸಾಯುತ್ತಾರೆ' ಎನ್ನುವುದು ಕೇವಲ ಭ್ರಮೆ. ಸೃಷ್ಟಿ-ಸಂಹಾರ ಕರ್ತನಾದ ಭಗವಂತನ ಇಚ್ಛೆ ಇಲ್ಲದೆ ಯಾವುದೂ ನಡೆಯುವುದಿಲ್ಲ. ಆತನ ಇಚ್ಛೆಗೆ ವಿರುದ್ಧವಾಗಿ ನಾವು ಏನೂ ಮಾಡಲು ಸಾಧ್ಯವಿಲ್ಲ.

ನ ಜಾಯತೇ ಮ್ರಿಯತೇ ವಾ ಕದಾಚಿತ್ ನಾ[s]ಯಂ ಭೂತ್ವಾ ಭವಿತಾ ವಾ ನ ಭೂಯಃ ।
ಅಜೋ ನಿತ್ಯಃ ಶಾಶ್ವತೋಽಯಂ ಪುರಾಣೋ ನ ಹನ್ಯತೇ ಹನ್ಯಮಾನೇ ಶರೀರೇ ॥೨೦॥

ನ ಜಾಯತೇ ಮ್ರಿಯತೇ ವಾ ಕದಾಚಿತ್ ನ ಅಯಮ್ ಭೂತ್ವಾ ಭವಿತಾ ವಾ ನ ಭೂಯಃ |
ಅಜಃ ನಿತ್ಯಃ ಶಾಶ್ವತಃ ಅಯಮ್ ಪುರಾಣಃ ನ ಹನ್ಯತೇ ಹನ್ಯಮಾನೇ ಶರೀರೇ -- ಈ ಜೀವ ಎಂದೂ ಹುಟ್ಟುವುದಿಲ್ಲ; ಸಾಯುವುದೂ ಇಲ್ಲ. ಭಗವಂತನ ಅರಿವಿನಂತೆ ಹುದುಗಿದ್ದು ಮತ್ತಾಗುವವನೂ ಅಲ್ಲ. ಇವನು ಹುಟ್ಟಿರದ, ಸಾವಿರದ, ಮಾರ್ಪಡದ-ಭಗವಂತನ ಪಡಿಯಚ್ಚು.[ಈ ಪರಮ ಪುರುಷ ಎಂದೂ ಹುಟ್ಟುವುದಿಲ್ಲ; ಸಾಯುವುದೂ ಇಲ್ಲ. ಸ್ವರೂಪದಿಂದಿದ್ದು ದೇಹದಿಂದ ಹುಟ್ಟುತ್ತಾನೆ ಎನ್ನುವುದೂ ಸಲ್ಲ. ಈ ಜೀವ ಕೂಡಾ ಹುಟ್ಟದ, ಸಾಯದ, ಬದಲಾಗದ ತತ್ವ.] ದೇಹದಿಂದ ದೇಹಕ್ಕೆ ಅಲೆವ ಈ ಜೀವ ದೇಹ ಅಳಿದರೂ ತಾನಳಿಯುವುದಿಲ್ಲ.

ಇಲ್ಲಿ ಕೃಷ್ಣ 'ಜೀವಸ್ವರೂಪ' ಅಂದರೆ ಏನೆಂದು ವಿವರಿಸಿದ್ದಾನೆ. ಈ ಜೀವ ಸ್ವರೂಪತಃ ಎಂದೂ ಹುಟ್ಟುವುದಿಲ್ಲ ಮತ್ತು ಎಂದೂ ನಾಶವಾಗುವುದಿಲ್ಲ. ಅದು ಸದಾ ಏಕರೂಪದಲ್ಲಿರುತ್ತದೆ. ಏಕೆಂದರೆ ಜೀವಸ್ವರೂಪ ಭಗವಂತನ ಪ್ರತಿಬಿಂಬ. ಭಗವಂತನಿಗೆ ಹುಟ್ಟಿಲ್ಲ. ಅವನು ನಿತ್ಯ ಹಾಗೂ ಶಾಶ್ವತ. ಜೀವ ಸದಾ ಶರೀರದಿಂದ ಶರೀರಕ್ಕೆ ಸಂಚರಿಸುತ್ತಿರುತ್ತದೆ(ಪುರ-ಅಣ). ಆದರೆ ದೇಹ ಬದಲಾದಂತೆ ಜೀವಸ್ವರೂಪ ಬದಲಾಗುವುದಿಲ್ಲ. ಭೌತಿಕ ಶರೀರಕ್ಕೆ ಮುದಿತನವಿದ್ದಂತೆ ಜೀವ ಸ್ವರೂಪಕ್ಕೆ ಮುದಿತನವಿಲ್ಲ. ಅದು ಸದಾ ಏಕರೂಪದಲ್ಲಿರುತ್ತದೆ. ಆದರೆ ಪ್ರಭಾವದಿಂದ ಬಂದ ನಂಬಿಕೆ ಬದಲಾಗಬಹುದು. ಉದಾಹರಣೆಗೆ ಒಂದು ಜನ್ಮದಲ್ಲಿ ನಾಸ್ತಿಕನಾಗಿರುವವ ಇನ್ನೊಂದು ಜನ್ಮದಲ್ಲಿ ಪೂರ್ಣ ಆಸ್ತಿಕನಾಗಬಹುದು. ಸ್ವಭಾವ ವಿಶಿಷ್ಟನಾದ ಜೀವ ಎಂದೂ ಬದಲಾಗದೇ, ನಾಶವಾಗದೇ ಉಳಿಯುತ್ತಾನೆ.

ವೇದಾವಿನಾಶಿನಂ ನಿತ್ಯಂ ಯ ಏನಮಜಮವ್ಯಯಮ್ ।
ಕಥಂ ಸ ಪುರುಷಃ ಪಾರ್ಥ ಕಂ ಘಾತಯತಿ ಹಂತಿ ಕಮ್ ॥೨೧॥

ವೇದ ಅವಿನಾಶಿನಮ್ ನಿತ್ಯಮ್ ಯಃ ಏನಮ್ ಅಜಮ್ ಅವ್ಯಯಮ್ |
ಕಥಮ್ ಸಃ ಪುರುಷಃ ಪಾರ್ಥ ಕಮ್ ಘಾತಯತಿ ಹಂತಿ ಕಮ್—ಓ ಪಾರ್ಥಾ, ಹುಟ್ಟು-ಸಾವುಗಳಿರದ, ಮಾರ್ಪಡದ, ಏತರಿಂದಲೂ ಅಳಿಯದ ಈ ಜೀವನನ್ನು[ಶರೀರದಿಂದಲೂ ಅಳಿವಿರದ ಭಗವಂತನನ್ನು] ಬಲ್ಲ ಜೀವಿ, ಯಾರನ್ನು ಹೇಗೆ ಕೊಲ್ಲಿಸುವುದು ? ಯಾರನ್ನು ಹೇಗೆ ಕೊಲ್ಲುವುದು?

ದೋಷ ಸಂಬಂಧವಿಲ್ಲದ, ನಿತ್ಯವಾದ, ಎಂದೂ ಬದಲಾಗದ ಜೀವ ಸ್ವರೂಪವನ್ನು ಯಾರು ತಿಳಿಯುತ್ತಾರೋ, ಅಂತಹ ಮಾನವ ಯಾರನ್ನು ಕೊಲ್ಲುವುದು ಅಥವಾ ಕೊಲ್ಲಿಸುವುದು ಹೇಗೆ ಸಾಧ್ಯ? ಸ್ವರೂಪತಃ ಜೀವನಿಗೆ ನಾಶವಿಲ್ಲ ಎಂದು ತಿಳಿದಾಗ, ಸ್ಥೂಲ ಪ್ರಪಂಚದಲ್ಲಿ ಹುಟ್ಟು-ಸಾವು ಭಗವಂತನ ಇಚ್ಛೆಯಂತೆ ನಡೆಯುತ್ತಿದೆ ಎಂದು

ತಿಳಿದ ಮೇಲೆ, ಯಾರು ಯಾರನ್ನು ಕೊಲ್ಲುವುದು ಅಥವಾ ಕೊಲ್ಲಿಸುವುದು? ಹುಟ್ಟು-ಸಾವಿನ ಹಿಂದಿರುವ ಭಗವದ್ ಶಕ್ತಿಯನ್ನು ನಾವು ಅರಿತುಕೊಳ್ಳಬೇಕು ಅಷ್ಟೆ.

ಜೀವಕ್ಕೆ ಅಳಿವಿಲ್ಲ, ಅದಕ್ಕೆ ಹುಟ್ಟು-ಸಾವು ಎನ್ನುವುದಿಲ್ಲ. ಹಾಗಿದ್ದರೆ ನಾವು ಪ್ರಾಪಂಚಿಕವಾಗಿ ಕಾಣುವ ಹುಟ್ಟು-ಸಾವನ್ನು ಅರ್ಥ ಮಾಡಿಕೊಳ್ಳುವುದು ಹೇಗೆ? ಈ ಪ್ರಶ್ನೆಗೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರಿಸಿದ್ದಾನೆ.

ವಾಸಾಂಸಿ ಜೀರ್ಣಾನಿ ಯಥಾ ವಿಹಾಯ ನವಾನಿ ಗೃಹ್ಣಾತಿ ನರೋಽಪರಾಣಿ ।
ತಥಾ ಶರೀರಾಣಿ ವಿಹಾಯ ಜೀರ್ಣಾನ್ಯನ್ಯಾನಿ ಸಂಯಾತಿ ನವಾನಿ ದೇಹೀ॥೨೨॥

ವಾಸಾಂಸಿ ಜೀರ್ಣಾನಿ ಯಥಾ ವಿಹಾಯ ನವಾನಿ ಗೃಹ್ಣಾತಿ ನರಃ ಅಪರಾಣಿ |
ತಥಾ ಶರೀರಾಣಿ ವಿಹಾಯ ಜೀರ್ಣಾನಿ ಅನ್ಯಾನಿ ಸಂಯಾತಿ ನವಾನಿ ದೇಹೀ -- ಮನುಷ್ಯ ಹಳೆಯ ಬಟ್ಟೆಬರೆಗಳನ್ನು ಬಿಸುಟು ಬೇರೆ ಹೊಸತನ್ನು ಉಡುತ್ತಾನೆ ಹೇಗೆಯೋ ಹಾಗೇ-ಜೀವ ಒಂದು ದೇಹವನ್ನು ಬಿಟ್ಟು ಬೇರೆ ಹೊಸ ದೇಹವನ್ನು ಪಡೆಯುತ್ತಾನೆ.

ನಾವು ಉಟ್ಟ ಬಟ್ಟೆ ಹಳೆಯದಾದಾಗ ಹೇಗೆ ಅದನ್ನು ಬದಲಿಸುತ್ತೇವೋ-ಹಾಗೇ, ಜೀವ ಒಂದು ದೇಹವನ್ನು ಬಿಟ್ಟು ಇನ್ನೊಂದು ದೇಹವನ್ನು ಪಡೆಯುತ್ತಾನೆ. ಇಲ್ಲಿ ಒಂದು ವಿಶೇಷವೆಂದರೆ ಹೇಗೆ ತಾಯಿ ತನ್ನ ಮಗುವಿಗೆ ತನ್ನಿಚ್ಛೆಯಂತೆ ಬಟ್ಟೆ ಬದಲಿಸುತ್ತಾಳೋ ಹಾಗೆ ಭಗವಂತ ಜೀವದ ದೇಹ ಬದಲಿಸುತ್ತಾನೆ. ಜೀವನಿಗೆ ಸ್ವತಃ ದೇಹ ಬದಲಿಸುವ ಸ್ವಾತಂತ್ರ್ಯ ಇರುವುದಿಲ್ಲ. ಇದಕ್ಕೆ ಒಂದು ಅಪವಾದ ಎಂದರೆ ಆತ್ಮ ಸಾಕ್ಷಾತ್ಕಾರವಾದ ಯೋಗಿಗಳು. ಅವರು ಭಗವಂತನ ಅನುಗ್ರಹದಿಂದ ಸ್ವ-ಇಚ್ಛೆಯಂತೆ ದೇಹ ಬದಲಿಸುವ ಶಕ್ತಿಯನ್ನು ಪಡೆದಿರುತ್ತಾರೆ. [ಈ ಬಗ್ಗೆ ಸ್ವಾಮಿರಾಮ್ ಅವರು ಬರೆದಿರುವ "Living with Himalayan Masters" ಎನ್ನುವ ಪುಸ್ತಕದಲ್ಲಿ ಅನೇಕ ನೈಜ ದೃಷ್ಟಾಂತಗಳನ್ನು ಕಾಣಬಹುದು.] ಇಂತಹ ಮಹಾನ್ ಯೋಗಿಗಳನ್ನು ಬಿಟ್ಟರೆ ಇತರರಿಗೆ ಸ್ವ-ಇಚ್ಛೆಯಂತೆ ದೇಹ ಬದಲಿಸುವ ಸ್ವಾತಂತ್ರ್ಯ ಇಲ್ಲ. ಆದ್ದರಿಂದ ಭೌತಿಕವಾಗಿ ಹುಟ್ಟು-ಸಾವು ಎಂದರೆ ಉಟ್ಟ ಬಟ್ಟೆಯನ್ನು ಕಳಚಿ ಹೊಸ ಬಟ್ಟೆಯನ್ನು ತೊಡಿಸಿದಂತೆ. ಸ್ವರೂಪತಃ ಜೀವಕ್ಕೆ ಎಂದೂ ಹುಟ್ಟು-ಸಾವು ಅನ್ನುವುದಿಲ್ಲ ಹಾಗೂ ಹೊಸ ಶರೀರದಿಂದ ಅದರ ಮೂಲಸ್ವಭಾವ ಬದಲಾಗುವುದಿಲ್ಲ.

ಹಾಗಾದರೆ ಆತ್ಮವನ್ನು ನಾಶ ಮಾಡಲು ಸಾಧ್ಯವೇ ಇಲ್ಲವೋ? ಎಂದೆಂದಿಗೂ ಇಲ್ಲ ಎನ್ನುತ್ತಾನೆ ಕೃಷ್ಣ ಮುಂದಿನ ಶ್ಲೋಕದಲ್ಲಿ.

ನೈನಂ ಛಿಂದಂತಿ ಶಸ್ತ್ರಾಣಿ ನೈನಂ ದಹತಿ ಪಾವಕಃ |
ನಚೈನಂ ಕ್ಲೇದಯಂತ್ಯಾಪೋ ನ ಶೋಷಯತಿ ಮಾರುತಃ ॥೨೩॥

ನ ಏನಮ್ ಛಿಂದಂತಿ ಶಸ್ತ್ರಾಣಿ ನ ಏನಮ್ ದಹತಿ ಪಾವಕಃ |
ನ ಚ ಏನಮ್ ಕ್ಲೇದಯಂತಿ ಅಪಃ ನ ಶೋಷಯತಿ ಮಾರುತಃ -- ಈ ಜೀವನನ್ನು (ಭಗವಂತನನ್ನು) ಆಯುಧಗಳು ತುಂಡರಿಸವು. ಇವನನ್ನು ಬೆಂಕಿ ಸುಡದು. ಇವನನ್ನು ನೀರು ನೆನೆಸದು, ಗಾಳಿ ಒಣಗಿಸದು.

ಯಾವುದೇ ಒಂದು ವಸ್ತುವನ್ನು ನಾಶಮಾಡಲು ಇರುವ ಮುಖ್ಯ ಅಸ್ತ್ರ ನಾಲ್ಕು. ಮಣ್ಣು(ಘನ ಆಯುಧ), ನೀರು, ಬೆಂಕಿ ಹಾಗೂ ಗಾಳಿ. ಜೀವ-ಸೂಕ್ಷ್ಮರಲ್ಲಿ ಸೂಕ್ಷ್ಮ. ಶಾಸ್ತ್ರಕಾರರು ಹೇಳುವಂತೆ ಕುದುರೆಯ ಬಾಲದ ಒಂದು ಕೂದಲಿನ ತುತ್ತ ತುದಿಯನ್ನು ಹತ್ತು ಸಾವಿರ ಭಾಗಗಳಾಗಿ ವಿಂಗಡಿಸಿದರೆ ಸಿಗುವ ಒಂದು ಭಾಗ ಎಷ್ಟು ಗಾತ್ರದ್ದೋ ಅಷ್ಟು ಗಾತ್ರದಲ್ಲಿರುತ್ತದೆ ಜೀವ. ಇಂತಹ ಜೀವವನ್ನು ಯಾವುದೇ ಆಯುಧ ತುಂಡರಿಸಲು ಸಾಧ್ಯವಿಲ್ಲ. ಬೆಂಕಿ ಜೀವನನ್ನು ಸುಡಲಾರದು. ನೀರಿನಿಂದ ಜೀವ ಒದ್ದೆಯಾಗದು. ಗಾಳಿ ಜೀವನನ್ನು ಒಣಗಿಸದು. ಸೂಕ್ಷ್ಮಾತಿ ಸೂಕ್ಷ್ಮವಾದ ಜೀವನನ್ನು ಯಾವ ಆಯುಧವೂ ನಾಶ ಮಾಡಲಾರವು.

ಇಲ್ಲಿ ನಮಗೆ ಇನ್ನೊಂದು ಪ್ರಶ್ನೆ ಮೂಡುತ್ತದೆ. "ಇಂದು ನಾಶ ಮಾಡಲು ಅಸಾಧ್ಯವಾದ ಜೀವ ಎಂದೆಂದೂ ನಾಶವಾಗದೇ ಇರುತ್ತದೆಯೇ?" ಎಂದು. ಹೌದು ಎನ್ನುತ್ತಾನೆ ಕೃಷ್ಣ ಮುಂದಿನ ಶ್ಲೋಕದಲ್ಲಿ.

ಅಚ್ಛೇದ್ಯೋಽಯಮದಾಹ್ಯೋಽಯಮಕ್ಲೇದ್ಯೋಽಶೋಷ್ಯ ಏವ ಚ ।
ನಿತ್ಯಃ ಸರ್ವಗತಸ್ಥಾಣುರಚಲೋಽಯಂ ಸನಾತನಃ ॥೨೪॥

ಅಚ್ಛೇದ್ಯಃ ಅಯಮ್ ಅದಾಹ್ಯಃ ಅಯಮ್ ಅಕ್ಲೇದ್ಯಃ ಅಶೋಷ್ಯಃ ಏವ ಚ ।
ನಿತ್ಯಃ ಸರ್ವಗತಃ ಸ್ಥಾಣು ಅಚಲಃ ಅಯಮ್ ಸನಾತನಃ -- ಈ ಜೀವನನ್ನು ಕಡಿಯಲಾಗದು. ಇವನನ್ನು ಸುಡಲಾಗದು. ನೆನೆಸಲಾಗದು; ಒಣಗಿಸಲೂ ಆಗದು. ಎಂದೆಂದೂ ಎಲ್ಲೆಡೆ ಹಬ್ಬಿರುವ, ಏತರಿಂದಲೂ ಮಾರ್ಪಡದ, ಅವಿಚಲನಾದ, ಪುರಾಣಪುರುಷನ ಪಡಿಯಚ್ಚು ಇವನು.[ಎಲ್ಲೆಡೆ ಹಬ್ಬಿರುವ ಭಗವಂತನನ್ನು ಎಂದೆಂದೂ ಹೊಂದಿರುವ ಅಣುರೂಪಿ. ಇವನು ಏತರಿಂದಲೂ ಮಾರ್ಪಡದ ನಿಯತಿಗೆ ಬದ್ಧ ; ವೇದದ ವಿಧಿ-ನಿಷೇಧಗಳಿಗೆ ಕೂಡಾ].

ಜೀವನನ್ನು ಇಂದಲ್ಲ, ಮುಂದೆಂದೂ ಯಾರಿಂದಲೂ ನಾಶಮಾಡಲು ಸಾಧ್ಯವಿಲ್ಲ. ಏಕೆಂದರೆ ಆತ ತನ್ನ ಗುಣಧರ್ಮದಿಂದ ಎಂದೂ ಬದಲಾಗದ, ಸರ್ವಗತನಾದ, ವಿಚಲಿತನಾಗದ-ಭಗವಂತನ ಪಡಿಯಚ್ಚು. ಯಾವ ಆಯುಧಕ್ಕೂ ನಿಲುಕದೆ ಎಲ್ಲಾ ಕಾಲದಲ್ಲೂ ಏಕರೂಪನಾಗಿರುವ, ಎಲ್ಲಾ ಕಡೆ ಸ್ಥಿರವಾದ, ಬದಲಾವಣೆ ಇಲ್ಲದೆ ಇರುವ ಗುಣಧರ್ಮ ಜೀವನಿಗಿದೆ. ಜೀವ ಸನಾತನ. ಅಂದರೆ ನಾತನದಿಂದ ಸಹಿತನಾದವ. ಇಲ್ಲಿ 'ನಾತನ' ಎಂದರೆ 'ನಾದನ'. ಅಂದರೆ ವೇದನಾದ. ಜೀವ ವೇದನಾದದಿಂದ ಸಹಿತನಾಗಿ, ಸಮಸ್ತ ವೇದ ಪ್ರತಿಪಾದ್ಯನಾದ ಭಗವಂತನ ಮಡಿಲಲ್ಲಿ ವೇದದ ವಿಧಿ-ನಿಷೇಧಗಳಿಗೆ ಬದ್ಧನಾಗಿರುತ್ತಾನೆ. ಅದು ಸರ್ವಗತನಾದ ಭಗವಂತನನ್ನು ಆಶ್ರಯಿಸಿರುವ ಮಹತ್ತಾದ ಅಣು.

ಅವ್ಯಕ್ತೋಽಯಮಚಿಂತ್ಯೋಽಯಮವಿಕಾರ್ಯೋಽಯಮುಚ್ಯತೇ ।
ತಸ್ಮಾದೇವಂ ವಿದಿತ್ವೈನಂ ನಾನುಶೋಚಿತುಮರ್ಹಸಿ ॥೨೫॥

ಅವ್ಯಕ್ತಃ ಅಯಮ್ ಅಚಿಂತ್ಯಃ ಅಯಮ್ ಅವಿಕಾರ್ಯಃ ಅಯಮ್ ಉಚ್ಯತೇ
ತಸ್ಮಾತ್ ಏವಮ್ ವಿದಿತ್ವಾ ಏನಮ್ ನ ಅನುಶೋಚಿತುಮ್ ಅರ್ಹಸಿ -- ಭಗವಂತ ಕಣ್ಣಿಗೆ ಕಾಣದವನು; ಇವನು ಚಿಂತನೆಗೆ ನಿಲುಕದವನು; ಇವನು ಬದಲಾಗದವನು-ಎಂದು ವೇದ ಸಾರುತ್ತದೆ. ಅದರಿಂದ ಅವನ[ಮತ್ತು ಜೀವನ] ಪರಿಯನ್ನು ಹೀಗೆ ಅರಿತ ಮೇಲೆ ಕೊರಗುವುದು ತರವಲ್ಲ.

ಭಗವಂತ ಅವ್ಯಕ್ತ. ಆತನ ಪ್ರತಿಬಿಂಬವಾದ ಜೀವ ಭೌತಿಕ ಶರೀರದಲ್ಲಿದ್ದರೂ ಕೂಡಾ ಅವ್ಯಕ್ತ. ಈ ಕಾರಣದಿಂದ ಭಗವಂತ ಹಾಗೂ ಜೀವ ನಮ್ಮ ಚಿಂತನೆಗೆ ನಿಲುಕದ್ದು. ನಾನು ಯಾರು? ಎಲ್ಲಿಂದ ಬಂದೆ ? ನಾನೇನು? ಎನ್ನುವುದೇ ನಮಗೆ ಗೊತ್ತಿಲ್ಲ. ಭಗವಂತ ಹಾಗೂ ಜೀವಸ್ವರೂಪ ಎಂದೂ ಬದಲಾಗದಿದ್ದರೂ ಕೂಡಾ, ಅದು ನಮ್ಮ ಚಿಂತನೆಗೆ ಎಟುಕುವುದಿಲ್ಲ. ಈ ಕಟು ಸತ್ಯವನ್ನು ತಿಳಿದ ಮೇಲೆ ಜೀವ ನಾಶವಾಗುತ್ತದೆ ಎಂದು ದುಃಖಿಸುವ ಅಗತ್ಯವಿಲ್ಲ.

ಅಥ ಚೈ ನಂ ನಿತ್ಯಜಾತಂ ನಿತ್ಯಂ ವಾ ಮನ್ಯಸೇ ಮೃತಮ್ ।
ತಥಾಽಪಿ ತ್ವಂ ಮಹಾಬಾಹೋ ನೈನಂ ಶೋಚಿತುಮರ್ಹಸಿ ॥೨೬॥

ಅಥ ಚ ಏನಮ್ ನಿತ್ಯಜಾತಮ್ ನಿತ್ಯಮ್ ವಾ ಮನ್ಯಸೇ ಮೃತಮ್ ।
ತದಾ ಅಪಿ ತ್ವಮ್ ಮಹಾಬಾಹೋ ನ ಏನಮ್ ಶೋಚಿತುಮ್ ಅರ್ಹಸಿ -- ಆದರೂ ಈ ಜೀವ ದೇಹದ ಮೂಲಕ ಸದಾ ಹುಟ್ಟುವವನು ಮತ್ತು ಸಾಯುವವನು ಎಂದು ಭಾವಿಸುವೆಯಾ? ಹಾಗಿದ್ದರೂ, ಓ ಮಹಾವೀರಾ, ನೀನು ಇವನಿಗಾಗಿ ಕೊರಗುವುದು ತರವಲ್ಲ.

ವೇದಾಂತ ಬಿಟ್ಟು ಲೋಕದ ದೃಷ್ಟಿಯಲ್ಲಿ ವಿಚಾರ ಮಾಡಿದರೆ, ಆತ್ಮ ದೇಹದ ಮೂಲಕ ವ್ಯಕ್ತವಾಗುತ್ತದೆ ಹಾಗೂ ಸಾವಿನ ಮೂಲಕ ಅವ್ಯಕ್ತವಾಗುತ್ತದೆ. ಹುಟ್ಟು-ಸಾವನ್ನು ಮೀರಿ ನಿಲ್ಲುವುದು ಎಂದೂ ಸಾಧ್ಯವಿಲ್ಲ. ಆದ್ದರಿಂದ ಸಾವಿನ ಬಗ್ಗೆ ದುಃಖ ಪಡುವ ಅಗತ್ಯವಿಲ್ಲ. "ಮಹಾ ಬಲಿಷ್ಠನಾದ ನೀನು ಈ ಹಿಂದೆ ಅದೆಷ್ಟು ಯುದ್ಧಗಳನ್ನು ಮಾಡಿದ್ದಿ? ಆಗ ಇರದ ಸಮಸ್ಯೆ ಈಗೇಕೆ? ನೀನು ಮಾಡುತ್ತಿರುವುದು ನಿನ್ನ ಕರ್ತವ್ಯವನ್ನೇ ಹೊರತು ಇನ್ನೇನನ್ನೂ ಅಲ್ಲ"-ಎಂದು ಕೃಷ್ಣ ಅರ್ಜುನನಿಗೆ ತಿಳಿಸಿ ಹೇಳುತ್ತಾನೆ.

ಜಾತಸ್ಯ ಹಿ ಧ್ರುವೋ ಮೃತ್ಯುರ್ಧ್ರುವಂ ಜನ್ಮ ಮೃತಸ್ಯ ಚ ।
ತಸ್ಮಾದಪರಿಹಾರ್ಯೇಽರ್ಥೇ ನ ತ್ವಂ ಶೋಚಿತುಮರ್ಹಸಿ ॥೨೭॥

ಜಾತಸ್ಯ ಹಿ ಧ್ರುವಃ ಮೃತ್ಯುಃ ಧ್ರುವಂ ಜನ್ಮ ಮೃತಸ್ಯ ಚ ।
ತಸ್ಮಾತ್ ಅಪರಿಹಾರ್ಯೇ ಅರ್ಥೇ ನ ತ್ವಂ ಶೋಚಿತುಮ್ ಅರ್ಹಸಿ-- ಹುಟ್ಟಿದವನಿಗೆ ಸಾವು ಖಚಿತ; ಸತ್ತವನಿಗೆ ಮರುಹುಟ್ಟೂ ಖಚಿತ. ಎಂದ ಮೇಲೆ, ಅನಿವಾರ್ಯವಾದ ಸಂಗತಿಗಾಗಿ ನೀನು ಅಳುವುದು ತರವಲ್ಲ.

ಹುಟ್ಟು-ಸಾವು, ಸುಖ-ದುಃಖ, ಒಂದು ನಾಣ್ಯದ ಎರಡು ಮುಖವಿದ್ದಂತೆ. ರಾತ್ರಿ ಇಲ್ಲದೆ ಹಗಲಿಲ್ಲ. ಹುಟ್ಟಿದ ಮೇಲೆ ಸಾವು ಕಟ್ಟಿಟ್ಟ ಬುತ್ತಿ. ನಾವು ಜೀವನದಲ್ಲಿ ಅನಿವಾರ್ಯವಾದದ್ದನ್ನು ಹೊಂದಿಸಿಕೊಳ್ಳುವುದನ್ನು ಕಲಿಯಬೇಕು. ಅದನ್ನು ಬಿಟ್ಟು ಕಷ್ಟ ಬಂದಾಗ ಕೊರಗುವುದು ತರವಲ್ಲ. ಅನಿವಾರ್ಯವಾದ ಕರ್ತವ್ಯ ಪಾಲನೆಯಲ್ಲಿ ನಾವು ಎಂದೂ ದುಃಖಿಸಬಾರದು.

ಅವ್ಯಕ್ತಾದೀನಿ ಭೂತಾನಿ ವ್ಯಕ್ತಮಧ್ಯಾನಿ ಭಾರತ ।
ಅವ್ಯಕ್ತನಿಧನಾನ್ಯೇವ ತತ್ರ ಕಾ ಪರಿದೇವನಾ ॥೨೮॥

ಅವ್ಯಕ್ತ ಆದೀನಿ ಭೂತಾನಿ ವ್ಯಕ್ತ ಮಧ್ಯಾನಿ ಭಾರತ ।
ಅವ್ಯಕ್ತ ನಿಧನಾನಿ ಏವ ತತ್ರ ಕಾ ಪರಿದೇವನಾ -- ಭರತವಂಶದ ಕುಡಿಯೇ, ಜೀವಿಗಳ ಬದುಕಿನ ಬುಡದ ಬೇರು ಕಾಣಿಸದು. ನಡು ಮಾತ್ರ ಕಾಣಿಸುತ್ತಿದೆ. ತುದಿಯೂ ಕಾಣಿಸದು. ಹೀಗಿರುವಾಗ ಏಕೆ ಗೋಳಾಡುವುದು?

ಇಲ್ಲಿಯವರೆಗೆ ಜೀವ, ಜೀವದ ಇರುವು, ಹುಟ್ಟು ಸಾವಿನ ಬಗ್ಗೆ ಅನೇಕ ರೀತಿಯಲ್ಲಿ ವಿಶ್ಲೇಷಣೆಯನ್ನು ಕೃಷ್ಣನ ಮಾತಿನಲ್ಲಿ ನೋಡಿದ್ದೇವೆ. ಆದರೆ ಮೂಲಭೂತವಾಗಿ ಅರ್ಜುನನಿಗೆ ಕಾಡಿದ ಸಮಸ್ಯೆ 'ನನ್ನ ಗುರು, ನನ್ನ ಅಜ್ಜ' ಎನ್ನುವ ಸಂಬಂಧದ ಸೆಳೆತ. ಅಂತಹ ಮಹಾ ಜ್ಞಾನಿಗಳ ವಿರುದ್ಧ ನಿರ್ಲಿಪ್ತನಾಗಿ ಯುದ್ಧ ಮಾಡುವುದು ಹೇಗೆ ಎನ್ನುವುದು ಆತನ ಸಮಸ್ಯೆ. ಇಲ್ಲಿ ಕೃಷ್ಣ ಆತನ ಸಮಸ್ಯೆಗೆ ಉತ್ತರಿಸುತ್ತಾನೆ.
ಒಬ್ಬ ವ್ಯಕ್ತಿ ನಮಗೆ ಸಂಬಂಧಿಯಾಗುವುದು ಆತನ ಹುಟ್ಟಿನ ನಂತರ. ಆದರೆ ಹುಟ್ಟಿನ ಮೊದಲು ಆತ ಏನಾಗಿದ್ದ? ಸತ್ತ ನಂತರ ಎಲ್ಲಿ ಹೋಗುತ್ತಾನೆ? ಈ ಹುಟ್ಟು-ಸಾವಿನ ಹಿಂದೆ ಮತ್ತು ಮುಂದೆ ನಮಗೂ ಆ ಜೀವಕ್ಕೂ ಏನೂ ಸಂಬಂಧವಿಲ್ಲ. ಈ ಸಂಬಂಧ ಜೀವದ ನಿರಂತರ ಬದುಕಿನ ಸರಳ ರೇಖೆಯಲ್ಲಿನ ಒಂದು ಬಿಂದು. ಅದು ಮಾತ್ರ ನಮಗೆ ವ್ಯಕ್ತ. ಉಳಿದದ್ದು ಅವ್ಯಕ್ತ. ಆದ್ದರಿಂದ ಸರಳ ರೇಖೆಯ ಒಂದು ಬಿಂದುವಿನಲ್ಲಿ ನಿಂತು ದುಃಖಿಸುವುದು ಸೂಕ್ತವಲ್ಲ.

ಇಲ್ಲಿ ನಾವು ಬದುಕಿದ್ದಾಗ ಒಬ್ಬರನೊಬ್ಬರು ಪ್ರೀತಿಸಬಾರದು ಎಂದಲ್ಲ. ಇದ್ದಾಗ ಪ್ರೀತಿಸು, ಆದರೆ ಇಲ್ಲವಾದಾಗ ಭಗವಂತ ಕರೆಸಿಕೊಂಡ ಎಂದು ನಿಶ್ಚಿಂತೆಯಿಂದ ಇರಲು ಮನಸ್ಸಿಗೆ ತರಬೇತಿ ಕೊಡು. ಈ ರೀತಿ ಬದುಕಲು ಕಲಿಯದಿದ್ದರೆ ಜೀವನ ದುಸ್ತರವಾಗುತ್ತದೆ. ಇದ್ದಾಗ ಸಂತೋಷದಿಂದಿರು, ಇಲ್ಲದಿದ್ದಾಗ ದುಃಖಿಸಬೇಡ ಎನ್ನುವುದು ಕೃಷ್ಣನ ಸಂದೇಶ.

ಆಶ್ಚರ್ಯವತ್ ಪಶ್ಯತಿ ಕಶ್ಚಿದೇನಂ ಆಶ್ಚರ್ಯವದ್ ವದತಿ ತಥೈವ ಚಾನ್ಯಃ ।
ಆಶ್ಚರ್ಯವಚ್ಚೈನಮನ್ಯಃ ಶೃಣೋತಿ ಶ್ರುತ್ವಾSಪ್ಯೇನಂ ವೇದ ನಚೈವ ಕಶ್ಚಿತ್ ॥೨೯॥

ಆಶ್ಚರ್ಯವತ್ ಪಶ್ಯತಿ ಕಶ್ಚಿತ್ ಏನಮ್ ಆಶ್ಚರ್ಯವತ್ ವದತಿ ತಥಾ ಏವ ಚ ಅನ್ಯಃ |
ಆಶ್ಚರ್ಯವತ್ ಚ ಏನಮ್ ಅನ್ಯಃ ಶೃಣೋತಿ ಶ್ರುತ್ವಾ ಅಪಿ ಏನಮ್ ವೇದ ನ ಚ ಏವ ಕಶ್ಚಿತ್ -- ಯಾರಾದರೂ ಈ ಜೀವತತ್ವವನ್ನು ಅಥವಾ ಭಗವಂತನನ್ನು ಕಂಡುಕೊಂಡರೆ ಅದೊಂದು ಅಚ್ಚರಿಯಂತೆ. ಇನ್ನೊಬ್ಬ ಅಂದು ತೋರಿಸಿದರೆ ಅದೊಂದು ಅಚ್ಚರಿಯಂತೆ. ಮಗದೊಬ್ಬ ಅದನ್ನು ಕೇಳಿ ತಿಳಿದರೆ ಅದೂ ಒಂದಚ್ಚರಿಯಂತೆ.[ಯಾರೋ ಒಬ್ಬ ಭಗವಂತನನ್ನು ಅಚ್ಚರಿಗೊಂಡು ನೋಡುತ್ತಾನೆ. ಯಾರೋ ಒಬ್ಬ ಅಚ್ಚರಿಗೊಂಡು ಆಡುತ್ತಾನೆ. ಯಾರೋ ಒಬ್ಬ ಅವನನ್ನು ಅಚ್ಚರಿಗೊಂಡು ಕೇಳುತ್ತಾನೆ] ಎಷ್ಟು ಕೇಳಿದರೂ ಜೀವವನ್ನಾಗಲೀ, ಭಗವಂತನನ್ನಾಗಲೀ ಸರಿಯಾಗಿ ಅರಿತವನು ಯಾರೂ ಇಲ್ಲ.

ಇದು ಜೀವ ಹಾಗೂ ಭಗವಂತನ ಬಗ್ಗೆ ಇರುವ ಶ್ಲೋಕ. ಭಗವಂತನನ್ನು ಕಂಡವರು ವಿರಳ. ಒಂದು ವೇಳೆ ಬಹಳ ಸಾಧನೆಯಿಂದ ಆತನನ್ನು ಕಂಡುಕೊಂಡರೆ, ಕಂಡವರ ಉದ್ಗಾರ ಕೇವಲ ಅಚ್ಚರಿ. ಅದೊಂದು ವಿಸ್ಮಯ. ಈ ವಿಶ್ವವೇ ಒಂದು ಅದ್ಭುತ, ಹಾಗಿರುವಾಗ ವಿಶ್ವವನ್ನು ನಿರ್ಮಿಸಿದ ಆ ಭಗವಂತ ಅದೆಷ್ಟು ಅದ್ಭುತವಿರಬಹುದು? ಆದ್ದರಿಂದ ಆತನನ್ನು ಕಂಡವರು ಆತನ ಬಗ್ಗೆ ವರ್ಣಿಸಲಾರರು. ಒಂದು ವೇಳೆ ವರ್ಣಿಸಿದರೆ ಕೇಳುವವನಿಗೆ ಅದೊಂದು ಅಚ್ಚರಿ. ಯಾರು ಎಷ್ಟೇ ಕೇಳಲಿ ಕೊನೆಗೆ ಭಗವಂತ ಕೇವಲ ಅಚ್ಚರಿಯಾಗೇ ಉಳಿಯುತ್ತಾನೆ. ಏಕೆಂದರೆ ಭಗವಂತನನ್ನು ತಿಳಿಯುವುದು ಅಸಾಧ್ಯ.
ಇದೇ ರೀತಿ ಜೀವ. ಆತ್ಮ ಸಾಕ್ಷಾತ್ಕಾರ ಆದಾಗ ನಮಗಾಗುವುದು ಕೇವಲ ವಿಸ್ಮಯ. ಅದನ್ನು ವರ್ಣಿಸುವುದು ಅಸಾಧ್ಯ. ಜೀವ ಒಂದು ಬೆಳಕಿನ ಪುಂಜ. ಅದೊಂದು ಮಹಾನ್ ಅಚ್ಚರಿ. ಅದು ಸೂರ್ಯನಿಗಿಂತ ಪ್ರಖರ, ಚಂದ್ರನಿಗಿಂತ ತಂಪಾದ ಬೆಳಕು. ಜೀವತತ್ವದ ಬಗ್ಗೆ ಕೇಳಿ ಅದರ ಬಗ್ಗೆ ಖಚಿತವಾದ ತೀರ್ಮಾನಕ್ಕೆ ಬರುವುದು ಅಸಾಧ್ಯ.

ದೇಹೀ ನಿತ್ಯಮವಧ್ಯೋऽಯಂ ದೇಹೇ ಸರ್ವಸ್ಯ ಭಾರತ ।
ತಸ್ಮಾತ್ ಸರ್ವಾಣಿ ಭೂತಾನಿ ನ ತ್ವಂ ಶೋಚಿತುಮರ್ಹಸಿ ॥೩೦॥

ದೇಹೀ ನಿತ್ಯಮ್ ಅವಧ್ಯಃ ಅಯಮ್ ದೇಹೇ ಸರ್ವಸ್ಯ ಭಾರತ |
ತಸ್ಮಾತ್ ಸರ್ವಾಣಿ ಭೂತಾನಿ ನ ತ್ವಮ್ ಶೋಚಿತುಮ್ ಅರ್ಹಸಿ -- ಓ ಭಾರತಾ, ಎಲ್ಲರ ದೇಹದಲ್ಲೂ ಇರುವ ಈ ಜೀವ ಎಂದೂ ಕೊಲ್ಲಲಾಗದ್ದು.[ಈ ಜೀವವನ್ನು ಕೊಲ್ಲುವುದು ಎಂದೂ ಸಾಧ್ಯವಿಲ್ಲ. ಏಕೆಂದರೆ ಎಲ್ಲರ ದೇಹದಲ್ಲೂ ಭಗವಂತ ಜೀವಕ್ಕೆ ಕಾವಲಿದ್ದಾನೆ] ಆದ್ದರಿಂದ ಎಲ್ಲಾ ಜೀವಿಗಳಿಗಾಗಿ ನೀನು ಅಳುವುದು ತರವಲ್ಲ.

ಮೂಲಭೂತವಾಗಿ ಯಾರ ದೇಹದಲ್ಲಿರುವ ಜೀವವನ್ನೂ ಸಾಯಿಸುವುದು ಸಾಧ್ಯವಿಲ್ಲ. ದೇಹ ಸಾಯಬೇಕು ಎನ್ನುವುದು ವಿಧಿ ನಿಯಮ, ಹಾಗೂ ಅದಕ್ಕಾಗಿ ದುಃಖಪಡಬೇಕಾಗಿಲ್ಲ. ತನ್ನ ಸ್ವಂತ ಇಚ್ಛೆಯಿಂದ ದೇಹ ತ್ಯಜಿಸಲು ಸಾಧ್ಯವಿಲ್ಲ, ಹಾಗೂ ತ್ಯಜಿಸದೇ ಇರಲೂ ಸಾಧ್ಯವಿಲ್ಲ. "ಅಯಮ್ ದೇಹೇ ಸರ್ವಸ್ಯ ಭಾರತ" - "ರಕ್ಷಣೆ ಮಾಡುವ

ಭಗವಂತ ಒಳಗೆ ಕುಳಿತಿರುವಾಗ ಹುಟ್ಟು ಸಾವಿಗೆ ನೀನು ಹೊಣೆಗಾರನಾಗಲಾರೆ. ಭರತವಂಶದಲ್ಲಿ ಹುಟ್ಟಿ ಬಂದ ನೀನು ಈ ಸತ್ಯವನ್ನು ಅರಿತುಕೋ" ಎನ್ನುತ್ತಾನೆ ಕೃಷ್ಣ. ಜೀವವೆಂಬ ಬೆಳಕಿನ ಕಿಡಿಯನ್ನು ತಿಳಿದಾಗ, ಅದರ ಅರಿವು ಬಂದಾಗ-ಹುಟ್ಟು ಸಾವಿನ ಮರ್ಮ ತಿಳಿಯುತ್ತದೆ. ಆಗ ಸಾವು ಒಂದು ಆನಂದದ ಅನುಭವವಾಗುತ್ತದೆ.
ಕೃಷ್ಣನ ಈ ಎಲ್ಲಾ ವಿಶ್ಲೇಷಣೆಯನ್ನು ಕೇಳಿದಾಗ ನಮ್ಮಲ್ಲಿ ಒಂದು ಅಭಿಪ್ರಾಯ ಮೂಡಬಹುದು . "ಕೊಲ್ಲುವುದು ತಪ್ಪಲ್ಲ, ಏಕೆಂದರೆ ಜೀವಕ್ಕೆ ಸಾವಿಲ್ಲ. ಎಲ್ಲವೂ ದೈವೇಚ್ಛೆ. ಯಾರು ಯಾರನ್ನು ಬೇಕಾದರೂ ಕೊಲ್ಲಬಹುದು" ಎಂದು. ಆದರೆ ಅದು ಸರಿಯಲ್ಲ. ಏಕೆಂದರೆ ಈವರೆಗೆ ನಾವು ನೋಡಿದ ವಿಷಯ ಕೇವಲ ಬದುಕಿನ ಒಳನೋಟ. ಸಮಾಜ ಜೀವಿಗಳಾದ ನಾವು ಒಳಗಿನ ಅರಿವನ್ನು ಸಮಾಜದ ವಿರುದ್ಧ ಬಳಸುವುದು ಅಧರ್ಮ. ಶಾಸ್ತ್ರಕ್ಕೆ ಅನುಗುಣವಾಗಿರುವ ಸಮಾಜ ಧರ್ಮವನ್ನು ಪ್ರತಿಯೊಬ್ಬರೂ ಪಾಲಿಸಲೇಬೇಕು. ಮುಂದಿನ ಶ್ಲೋಕದಲ್ಲಿ ಕೃಷ್ಣ ಈ ವಿಚಾರವನ್ನು ಅರ್ಜುನನ ಮುಖೇನ ನಮಗೆ ಸ್ಪಷ್ಟಪಡಿಸುತ್ತಾನೆ.

ಸ್ವಧರ್ಮಮಪಿ ಚಾವೇಕ್ಷ್ಯ ನ ವಿಕಂಪಿತುಮರ್ಹಸಿ ।
ಧರ್ಮ್ಯಾದ್ಧಿ ಯುದ್ಧಾಚ್ಛ್ರೇಯೋಽನ್ಯತ್ ಕ್ಷತ್ರಿಯಸ್ಯ ನ ವಿದ್ಯತೇ ॥೩೧॥

ಸ್ವಧರ್ಮಮ್ ಅಪಿ ಚ ಅವೇಕ್ಷ್ಯ ನ ವಿಕಂಪಿತುಮ್ ಅರ್ಹಸಿ |
ಧರ್ಮ್ಯಾತ್ ಹಿ ಯುದ್ಧಾತ್ ಶ್ರೇಯಃ ಅನ್ಯತ್ ಕ್ಷತ್ರಿಯಸ್ಯ ನ ವಿದ್ಯತೇ -- ನಿನ್ನ ಧರ್ಮವನ್ನು ಕಂಡಾದರೂ ನೀನು ಎದೆಗೆಡಬಾರದು ಕ್ಷತ್ರಿಯನಾದವನಿಗೆ ನ್ಯಾಯದಿಂದ ಒದಗಿ ಬಂದ ಕಾಳಗಕ್ಕಿಂತ ಮಿಗಿಲಾದ ಏಳಿಗೆಯಿಲ್ಲ.

ಇಲ್ಲಿ ಅರ್ಜುನನ ಸನಾತನ ಧರ್ಮ ಯಾವುದು? ಸಮಾಜ ಧರ್ಮ ಯಾವುದು? ಹಾಗೂ ಸ್ವಧರ್ಮ ಯಾವುದು? ಸನಾತನ ಧರ್ಮ ಹೇಳುತ್ತದೆ: 'ಅನ್ಯಾಯದ ವಿರುದ್ಧ ಹೋರಾಡಲೇ ಬೇಕು' ಎಂದು; ಸಮಾಜ ಧರ್ಮ ಹೇಳುತ್ತದೆ: ಕ್ಷತ್ರಿಯನಾದವನು ಅಧರ್ಮದ ವಿರುದ್ಧ ಹೋರಾಡಬೇಕು, ಸಮಾಜದ ರಕ್ಷಣೆ ಮಾಡಬೇಕು ಹಾಗೂ ಈ ಪುಣ್ಯ ಕಾರ್ಯದಲ್ಲಿ 'ತನ್ನವರು' ಎಂದು ನೋಡಬಾರದು ಎಂದು. ಇನ್ನು ಅರ್ಜುನ ಮೂಲತಃ ಕ್ಷತ್ರಿಯನಾದ್ದರಿಂದ ಆತನ ಸ್ವಧರ್ಮ 'ಅನ್ಯಾಯದ ವಿರುದ್ಧ ಹೋರಾಟ'. ಇಲ್ಲಿ ವ್ಯಕ್ತಿಧರ್ಮ, ಸಮಾಜಧರ್ಮ ಹಾಗೂ ಸನಾತನಧರ್ಮ ಏಕವಾಗಿದೆ. ಆದ್ದರಿಂದ ಅನ್ಯಾಯದ ವಿರುದ್ಧ ಹೋರಾಡುವುದು ಮಹಾ ಪುಣ್ಯದ ಕೆಲಸ. ಸಮಾಜ ಸುರಕ್ಷತೆಗಾಗಿ ಹೋರಾಡುವುದು ಕ್ಷತ್ರಿಯನ ಮಹಾತಪಸ್ಸು. ಇದಕ್ಕಿಂತ ಪುಣ್ಯಕಾರ್ಯ ಇನ್ನೊಂದಿಲ್ಲ.

ಯದೃಚ್ಛಯಾ ಚೋಪಪನ್ನಂ ಸ್ವರ್ಗದ್ವಾರಮಪಾವೃತಮ್ ।
ಸುಖಿನಃ ಕ್ಷತ್ರಿಯಾಃ ಪಾರ್ಥ ಲಭಂತೇ ಯುದ್ಧಮೀದೃಶಮ್ ॥೩೨॥

ಯದೃಚ್ಛಯಾ ಚ ಉಪಪನ್ನಮ್ ಸ್ವರ್ಗ ದ್ವಾರಮ್ ಅಪಾವೃತಮ್ |

ಸುಖಿನಃ ಕ್ಷತ್ರಿಯಾಃ ಪಾರ್ಥ ಲಭಂತೇ ಯುದ್ಧಮ್ ಈದೃಶಮ್-- ಇಂತಹ ಕಾಳಗವೆಂದರೆ ದೈವೇಚ್ಛೆಯಿಂದ ಕೂಡಿಬಂದ, ತೆರೆದಿಟ್ಟ ಸ್ವರ್ಗದ ಬಾಗಿಲು. ಪಾರ್ಥ, ಭಾಗ್ಯವಂತರಾದ ಕ್ಷತ್ರಿಯರು ಮಾತ್ರವೇ ಇಂತಹ ಅವಕಾಶ ಪಡೆಯುತ್ತಾರೆ.

ಕಾಲು ಕೆದಕಿ ಯುದ್ಧ ಮಾಡುವುದು ತಪ್ಪು. ಆದರೆ ಇಲ್ಲಿ ಸಮಷ್ಟಿಯಾಗಿ ಬಂದ ಯುದ್ಧದ ಹೊಣೆಗಾರಿಕೆ ಪಾಂಡವರದ್ದಲ್ಲ. ತನ್ನಷ್ಟಕ್ಕೇ ಬಂದು ಎರಗಿದ ಈ ಯುದ್ಧ ದೈವೇಚ್ಛೆ. ಈಶ್ವರನ ಇಚ್ಛೆಯಂತೆ ಎಲ್ಲವೂ ಆಗುವಾಗ, ಏನು ಬಂತೋ ಅದನ್ನು ಹಾಗೇ ಸ್ವೀಕರಿಸಬೇಕು. ಅನ್ಯಾಯದ ವಿರುದ್ಧ ಧರ್ಮಯುದ್ಧ ಮಾಡಿದವನಿಗೆ ಸ್ವರ್ಗದ ಬಾಗಿಲು ಸದಾ ತೆರೆದಿರುತ್ತದೆ. ಇಂತಹ ಯುದ್ಧದ ಅವಕಾಶ ಒಬ್ಬ ಕ್ಷತ್ರಿಯನಿಗೆ ಬರಬೇಕಾದರೆ ಆತ ಪುಣ್ಯ ಮಾಡಿರಬೇಕು. ಇಂತಹ ಸಮಯದಲ್ಲಿ ಕ್ಷತ್ರಿಯನಾದವನು ಕಣ್ಮುಚ್ಚಿ ಕುಳಿತುಕೊಳ್ಳುವುದು ಮಹಾಪಾಪ.

ಇಲ್ಲಿ ನಮಗೆ ಕೃಷ್ಣ ಅರ್ಜುನನಲ್ಲಿ ಯುದ್ಧಮಾಡು ಎಂದು ಏಕೆ ಹೇಳುತ್ತಿದ್ದಾನೆ ಎನ್ನುವುದು ಸ್ಪಷ್ಟವಾಗಿ ತಿಳಿಯುತ್ತದೆ. ಪ್ರತಿಯೊಬ್ಬ ಮಾನವನೂ ಸನಾತನಧರ್ಮ, ಅದಕ್ಕನುಗುಣವಾಗಿ ಸಮಾಜಧರ್ಮ ಹಾಗೂ ಸಮಾಜ ಮತ್ತು ಸನಾತನ ಧರ್ಮಕ್ಕನುಗುಣವಾಗಿ ಸ್ವಧರ್ಮ-ಈ ನೆಲೆಯಲ್ಲಿ ತನ್ನ ಕರ್ತವ್ಯ ನಿರ್ವಹಿಸಬೇಕು. ಈ ನೆಲೆಯಲ್ಲಿ ಮಾಡಿದ ಯಾವ ಕಾರ್ಯವೂ ಪಾಪ ಕಾರ್ಯವಾಗದು. ಮುಂದಿನ ಶ್ಲೋಕದಲ್ಲಿ ಈ ಬಗ್ಗೆ ಇನ್ನೂ ಹೆಚ್ಚಿನ ವಿವರವನ್ನು ಕೃಷ್ಣ ಕೊಡುತ್ತಾನೆ. ಸನಾತನಧರ್ಮ, ಸಮಾಜಧರ್ಮ ಮತ್ತು ಸ್ವಧರ್ಮ ಅಂದರೆ ಏನು ಎನ್ನುವುದನ್ನು ಈಗಾಗಲೇ ಅಧ್ಯಾಯ ಒಂದರಲ್ಲಿ (ಶ್ಲೋಕ-೪೦) ವಿವರವಾಗಿ ವಿಶ್ಲೇಷಿಸಲಾಗಿದೆ.

ಅಥ ಚೇತ್ ತ್ವಂ ಧರ್ಮ್ಯಮಿಮಂ ಸಂಗ್ರಾಮಂ ನ ಕರಿಷ್ಯಸಿ ।
ತತಃ ಸ್ವಧರ್ಮಂ ಕೀರ್ತಿಂ ಚ ಹಿತ್ವಾ ಪಾಪಮವಾಪ್ಸ್ಯಸಿ ॥೩೩॥

ಅಥ ಚೇತ್ ತ್ವಮ್ ಧರ್ಮ್ಯಮ್ ಇಮಮ್ ಸಂಗ್ರಾಮಮ್ ನ ಕರಿಷ್ಯಸಿ |
ತತಃ ಸ್ವಧರ್ಮಮ್ ಕೀರ್ತಿಮ್ ಚ ಹಿತ್ವಾ ಪಾಪಮ್ ಅವಾಪ್ಸ್ಯಸಿ -- ಒಂದೊಮ್ಮೆ, ನ್ಯಾಯದಿಂದ ಒದಗಿ ಬಂದ ಈ ಕಾಳಗವನ್ನು ನೀನು ಕೈಗೊಳ್ಳದಿದ್ದರೆ, ಆಗ , ನಿನ್ನ ಧರ್ಮವನ್ನೂ ಹೆಸರನ್ನೂ ಕಳೆದುಕೊಂಡು ಪಾಪವನ್ನು ಗಳಿಸುವೆ.

ಮುಂದುವರಿದು ಕೃಷ್ಣ ಅರ್ಜುನನಲ್ಲಿ ಹೇಳುತ್ತಾನೆ: "ನೀನು ಪಾಪದ ಭಯದಿಂದ ಯುದ್ಧ ಬೇಡ ಎಂದು ಹೇಳುತ್ತಿರುವೆ. ಆದರೆ ಯುದ್ಧ ಮಾಡಿದರೆ ಮಾತ್ರ ಧರ್ಮ ಉಳಿಯುತ್ತದೆ, ಹಾಗೂ ನಿನಗೆ ಸ್ವರ್ಗದ ಬಾಗಿಲು ತೆರೆಯುತ್ತದೆ. ಇಲ್ಲದೆ ಇದ್ದಲ್ಲಿ ನರಕದ ಬಾಗಿಲು ನಿನ್ನನ್ನು ಸ್ವಾಗತಿಸಲಿದೆ" ಎಂದು.

ಇಲ್ಲಿ ನಡೆಯುತ್ತಿರುವುದು ಒಂದು ಧರ್ಮ ಸಂಗ್ರಾಮ. ಅರ್ಜುನ ಧರ್ಮದ ಪರ ನಿಂತ ಮಹಾರಥಿ. ಆತ ಇಂತಹ ಧರ್ಮ ಸಂಗ್ರಾಮದಲ್ಲಿ ಧರ್ಮದ ಪರ ಹೋರಾಡದಿದ್ದರೆ ಸಹಜಧರ್ಮಕ್ಕೆ ವಿರುದ್ಧವಾಗಿ ಹಾಗೂ ಸಾಮಾಜಿಕ ಧರ್ಮವನ್ನು ಬಿಟ್ಟು ನಡೆದುಕೊಂಡಂತೆ. ಇದೊಂದು ಕಳಂಕ ಮತ್ತು ಮಹಾ ಪಾಪವಾಗುತ್ತದೆ. ಈ ರೀತಿ ಪಾಪದ ಭಯದಿಂದ ಬಳಲುತ್ತಿರುವ ಅರ್ಜುನನಿಗೆ ಕೃಷ್ಣ ಯಾವುದು ನಿಜವಾದ ಪಾಪ ಎನ್ನುವುದನ್ನು ಮನವರಿಕೆ ಮಾಡಿಸುತ್ತಿದ್ದಾನೆ.

ಪಾಪ ಕೃತ್ಯ ಯಾವುದು ಎನ್ನುವುದನ್ನು ಸಂದರ್ಭ ನಿರ್ಧರಿಸುತ್ತದೆ. ಉದಾಹರಣೆಗೆ 'ಸತ್ಯ ನುಡಿಯುವುದು ಪುಣ್ಯದ ಕೆಲಸ' ಎಂದು ಹೇಳಲಾಗದು. ಅದು ಪಾಪವೋ ಪುಣ್ಯವೋ ಎನ್ನುವುದನ್ನು ಸಂದರ್ಭ ನಿರ್ಣಯಿಸುತ್ತದೆ. ದರೋಡೆಕೋರರಿಂದ ತಪ್ಪಿಸಿಕೊಳ್ಳಲು-ಆಶ್ರಯ ಕೇಳಿ ಬಂದ ವ್ಯಕ್ತಿಯನ್ನು ಅಡಗಿಸಿಟ್ಟು, ದರೋಡೆಕೋರರು ಬಂದು ಪ್ರಶ್ನಿಸಿದಾಗ ಸತ್ಯ ನುಡಿಯುವುದು ಪಾಪದ ಕೆಲಸ. ಅಡಗಿಸಿಟ್ಟ ವ್ಯಕ್ತಿಯ ರಕ್ಷಣೆಗೋಸ್ಕರ ಸುಳ್ಳನ್ನು ಹೇಳುವುದು ಪುಣ್ಯದ ಕೆಲಸ. ಇದೇ ರೀತಿ ಇಲ್ಲಿ ಅರ್ಜುನನಿಗೆ ಧರ್ಮದ ರಕ್ಷಣೆಗೋಸ್ಕರ ಗುರು-ಪಿತಾಮಹರನ್ನು ಎದುರಿಸಿ ಹೋರಾಡುವುದೊಂದೇ ಮಹಾಪುಣ್ಯದ ಕೆಲಸ ಎನ್ನುವುದನ್ನು ಕೃಷ್ಣ ಮನವರಿಕೆ ಮಾಡಿಸುತ್ತಿದ್ದಾನೆ.

ಅಕೀರ್ತಿಂ ಚಾಪಿ ಭೂತಾನಿ ಕಥಯಿಷ್ಯಂತಿ ತೇSವ್ಯಯಾಮ್ ।
ಸಂಭಾವಿತಸ್ಯ ಚಾಕೀರ್ತಿರ್ಮರಣಾದತಿರಿಚ್ಯತೇ ॥೩೪॥

ಅಕೀರ್ತಿಮ್ ಚ ಅಪಿ ಭೂತಾನಿ ಕಥಯಿಷ್ಯಂತಿ ತೇ ಅವ್ಯಯಾಮ್ |
ಸಂಭಾವಿತಸ್ಯ ಚ ಅಕೀರ್ತಿಃ ಮರಣಾತ್ ಅತಿರಿಚ್ಯತೇ--ಜನರು ನಿನ್ನ ಕೊನೆಯಿರದ ಕಳಂಕದ ಕಥೆಯನ್ನು ಆಡಿಕೊಳ್ಳುತ್ತಾರೆ. ಮರ್ಯಾದೆಯ ಮನುಷ್ಯನಿಗೆ ಕೆಟ್ಟ ಹೆಸರು ಸಾವಿಗಿಂತ ಧಾರುಣ.

ಸಾಮಾಜಿಕ ಪರಿಣಾಮದ ಬಗ್ಗೆ ವಿವರಿಸುತ್ತಾ ಕೃಷ್ಣ ಹೇಳುತ್ತಾನೆ: ಒಬ್ಬ ಕ್ಷತ್ರಿಯನಿಗೆ ಆತನ ಕೀರ್ತಿ ನಾಶವಾದರೆ ಆತ ಅವಮಾನಕ್ಕೊಳಗಾಗುತ್ತಾನೆ. ಅದರಿಂದ ಆತ ತನ್ನ ಅಸ್ಥಿತ್ವವನ್ನೇ ಕಳೆದುಕೊಳ್ಳಬಹುದು. ಜಗತ್ತಿನಲ್ಲಿ ಮಹಾನ್ ಬಿಲ್ಲೋಜ ಎನ್ನುವ ಕೀರ್ತಿ ಪಡೆದ ಅರ್ಜುನ ಈ ಧರ್ಮಯುದ್ಧದಲ್ಲಿ ಪಾಲ್ಗೊಳ್ಳದೇ ಇದ್ದಲ್ಲಿ, ಜನರು ಆತನನ್ನು ಹೇಡಿ ಎಂದು ಆಡಿಕೊಳ್ಳುತ್ತಾರೆ. ಇತಿಹಾಸದ ಪುಟಗಳಲ್ಲಿ ಆತನ ಹೇಡಿತನ ಮುಂದಿನ ಪೀಳಿಗೆಗೆ ಕೆಟ್ಟ ಉದಾಹರಣೆಯಾಗಿ ನಿಲ್ಲುತ್ತದೆ. 'ಬಂಧು ಸ್ನೇಹಕ್ಕಾಗಿ ಯುದ್ಧದಿಂದ ಹಿಂದೆ ಸರಿದ' ಎಂದು ಯಾರೂ ಹೇಳಲಾರರು. ಯುದ್ಧಕ್ಕೆ ಹೆದರಿ ಓಡಿಹೋದ ಹೇಡಿ ಎಂದು ನೀಚವಾಗಿ ಬಯ್ಯುತ್ತಾರೆ. ಒಬ್ಬ ಮರ್ಯಾದಸ್ತ ಮನುಷ್ಯನಿಗೆ ಅಕೀರ್ತಿ ಎನ್ನುವುದು ಸಾವಿಗಿಂತ ಕೀಳು. ಒಬ್ಬ ಕ್ಷತ್ರಿಯ ಇದನ್ನು ಸಹಿಸಲಾರ.

ಭಯಾದ್ ರಣಾದುಪರತಂ ಮಂಸ್ಯಂತೇ ತ್ವಾಂ ಮಹಾರಥಾಃ ।
ಯೇಷಾಂ ಚ ತ್ವಂ ಬಹುಮತೋ ಭೂತ್ವಾ ಯಾಸ್ಯಸಿ ಲಾಘವಮ್ ॥೩೫॥

ಭಯಾತ್ ರಣಾತ್ ಉಪರತಮ್ ಮಂಸ್ಯಂತೇ ತ್ವಾಮ್ ಮಹಾರಥಾಃ |
ಯೇಷಾಮ್ ಚ ತ್ವಮ್ ಬಹುಮತಃ ಭೂತ್ವಾ ಯಾಸ್ಯಸಿ ಲಾಘವಮ್--ಯಾರಿಗೆ ನೀನು ಘನತೆಯ ವ್ಯಕ್ತಿಯಾಗಿದ್ದೆಯೋ ಅಂತಹ ಹಿರಿಯ ತೇರಾಳುಗಳೆದುರು ಹಗುರಾಗುವೆ; ಅವರು ನಿನ್ನನ್ನು ಹೆದರಿ ಹೋರಾಡಲು ಹಿಂಜರಿದ ಹೇಡಿ ಎಂದು ಭಾವಿಸುತ್ತಾರೆ.

ಅವಾಚ್ಯವಾದಾಂಶ್ಚ ಬಹೂನ್ ವದಿಷ್ಯಂತಿ ತವಾಹಿತಾಃ ।
ನಿಂದಂತಸ್ತವ ಸಾಮರ್ಥ್ಯಂ ತತೋ ದುಃಖತರಂ ನು ಕಿಮ್ ॥೩೬॥

ಅವಾಚ್ಯ ವಾದಾನ್ ಚ ಬಹೂನ್ ವದಿಷ್ಯಂತಿ ತವ ಅಹಿತಾಃ ।
ನಿಂದಂತಃ ತವ ಸಾಮರ್ಥ್ಯಮ್ ತತಃ ದುಃಖತರಮ್ ನು ಕಿಮ್ --ನಿನಗಾಗದವರು ನಿನ್ನ ಕೆಚ್ಚನ್ನು ಹೀಗಳೆಯುತ್ತಾ, ಬಾಯಿ ತುಂಬಾ ಆಡಬಾರದ ಮಾತುಗಳನ್ನಾಡುತ್ತಾರೆ. ಅದಕ್ಕೂ ಮಿಗಿಲಾದ ಸಂಕಟ ಏನುಂಟು ?

"ಯಾರು ನಿನ್ನನ್ನು ದೊಡ್ಡ ವೀರ ಎಂದು ಕೈ ಮುಗಿದು ತಲೆಬಾಗಿ ನಿಲ್ಲುತ್ತಿದ್ದರೋ, ಅವರು ನಿನ್ನನ್ನು ಹುಲ್ಲಿಗಿಂತ ಕಡೆಯಾಗಿ ನೋಡುತ್ತಾರೆ. ಸಮಾಜದಲ್ಲಿ ಉನ್ನತ ಪುರುಷನಾಗಿರುವ ನೀನು ಅವಮಾನಿತನಾಗಿ ಬದುಕಬೇಕಾಗುತ್ತದೆ. ಆಡಬಾರದ ಅಸಭ್ಯ ಮಾತುಗಳು ಹುಟ್ಟಿಕೊಳ್ಳುತ್ತವೆ. ಇದರಿಂದ ಈ ಹಿಂದಿನ ಸರ್ವ ಸಾಧನೆಯೂ ಸುಳ್ಳು ಎಂದು ಹೀಗಳೆದು ಆಡಿಕೊಳ್ಳುತ್ತಾರೆ".
ಒಬ್ಬ 'ಉತ್ತಮ ನ್ಯಾಯಾಧೀಶ ' ಎಂದು ಹೆಸರು ಪಡೆದ ವ್ಯಕ್ತಿ, ಯಾವುದೋ ಒಂದು ಸಂದರ್ಭದಲ್ಲಿ ತನ್ನ ಆತ್ಮೀಯ ಬಂಧುವಿಗೋಸ್ಕರ ಕೆಟ್ಟ ತೀರ್ಪನ್ನು ಕೊಟ್ಟರೆ, ಆತ ತನ್ನ ಸಂಪೂರ್ಣ ವ್ಯಕ್ತಿತ್ವವನ್ನು ಕಳೆದುಕೊಳ್ಳುತ್ತಾನೆ. ಆತನ ಹಿಂದಿನ ಎಲ್ಲಾ ಸಾಧನೆಗಳು ಒಂದೇ ಕ್ಷಣದಲ್ಲಿ ಮಣ್ಣುಪಾಲಾಗುತ್ತದೆ. ಆತನಿಂದ ಶಿಕ್ಷೆಗೊಳಗಾದ ಅಪರಾಧಿಗಳು ಅಸಭ್ಯವಾಗಿ ಆತನನ್ನು ನಿಂದಿಸುತ್ತಾರೆ. ಇಲ್ಲಿ ಶ್ರೀಕೃಷ್ಣ ಅರ್ಜುನನಿಗೆ ಈ ಸಾಮಾಜಿಕ ಅರಿವನ್ನು ಕೊಡುತ್ತಿದ್ದಾನೆ.

ಹತೋ ವಾ ಪ್ರಾಪ್ಸ್ಯಸಿ ಸ್ವರ್ಗಂ ಜಿತ್ವಾ ವಾ ಭೋಕ್ಷ್ಯಸೇ ಮಹೀಮ್ ।
ತಸ್ಮಾದುತ್ತಿಷ್ಠ ಕೌಂತೇಯಾ ಯುದ್ಧಾಯ ಕೃತನಿಶ್ಚಯಃ ॥೩೭॥

ಹತಃ ವಾ ಪ್ರಾಪ್ಸ್ಯಸಿ ಸ್ವರ್ಗಮ್ ಜಿತ್ವಾ ವಾ ಭೋಕ್ಷ್ಯಸೇ ಮಹೀಮ್ ।
ತಸ್ಮಾತ್ ಉತ್ತಿಷ್ಠ ಕೌಂತೇಯ ಯುದ್ಧಾಯ ಕೃತ ನಿಶ್ಚಯಃ-- ಸತ್ತರೆ ಸ್ವರ್ಗ ಸೇರುವೆ. ಗೆದ್ದರೆ ನೆಲವನ್ನಾಳುವೆ. ಆದ್ದರಿಂದ, ಕೌಂತೇಯ, ಹೋರಾಡುವ ತೀರ್ಮಾನ ತಳೆದು ಎದ್ದು ನಿಲ್ಲು.

"ಯುದ್ಧ ಮಾಡುವುದರಿಂದ ನಾವು ಗೆಲ್ಲುತ್ತೇವೆ ಎನ್ನುವುದು ತಿಳಿಯದು. ಧರ್ಮ ಯುದ್ಧದಲ್ಲಿ ಸತ್ತರೂ ಮೋಕ್ಷ, ಗೆದ್ದರೂ ಮೋಕ್ಷ. ಯಾವುದೋ ಸ್ವಾರ್ಥಕ್ಕಾಗಿ ಮಾಡುತ್ತಿರುವ ಯುದ್ಧವಿದಲ್ಲ. ಅನ್ಯಾಯದ ವಿರುದ್ಧ ಹೋರಾಡುವೆ ಎನ್ನುವ ಸಂಕಲ್ಪದಿಂದ ಎದ್ದು ನಿಂತು ಹೋರಾಡು" ಎನ್ನುತ್ತಾನೆ ಕೃಷ್ಣ.
ನಾವು ಮಾಡುವ ಕಾರ್ಯದಲ್ಲಿ ಧರ್ಮದ ಪರಿಜ್ಞಾನ ಮುಖ್ಯ. ಯಾವುದೇ ಸ್ವಾರ್ಥವಿಲ್ಲದೆ, ಧರ್ಮದ ಮಾರ್ಗವನ್ನು ಅನುಸರಿಸುವವನು ಎಂದೂ ಯಾವುದಕ್ಕೂ ಅಂಜುವ ಅಗತ್ಯವಿಲ್ಲ. ಧರ್ಮ ಮಾರ್ಗದಲ್ಲಿ ನಡೆದರೆ

ನನಗೇನಾಗುತ್ತದೋ ಎನ್ನುವ ಭಯ ಬೇಡ. ಏಕೆಂದರೆ ಧರ್ಮದ ನಡೆಯಲ್ಲಿ ಫಲಿತಾಂಶ ಯಾವುದೇ ಇರಲಿ, ಅದು ನಮ್ಮನ್ನು ಮೋಕ್ಷಕ್ಕೆ ಕೊಂಡೊಯ್ಯುವ ಸಾಧನವಾಗಿರುತ್ತದೆ.

ಸುಖದುಃಖೇ ಸಮೇ ಕೃತ್ವಾ ಲಾಭಾಲಾಭೌ ಜಯಾಜಯೌ ।
ತತೋ ಯುದ್ಧಾಯ ಯುಜ್ಯಸ್ವ ನೈವಂ ಪಾಪಮವಾಪ್ಸ್ಯಸಿ ॥೩೮॥

ಸುಖ ದುಃಖೇ ಸಮೇ ಕೃತ್ವಾ ಲಾಭ ಅಲಾಭೌ ಜಯ ಅಜಯೌ ।
ತತಃ ಯುದ್ಧಾಯ ಯುಜ್ಯಸ್ವ ನ ಏವಮ್ ಪಾಪಮ್ ಅವಾಪ್ಸ್ಯಸಿ -- ಸುಖ-ದುಃಖಗಳನ್ನು, ಗಳಿಕೆ-ಇಳಿಕೆಗಳನ್ನು, ಸೋಲು-ಗೆಲುವನ್ನು ಒಂದೇ ನಿಟ್ಟಿನಿಂದ ಕಂಡು ಮತ್ತೆ ಹೋರಾಡತೊಡಗು. ಆಗ ನಿನಗೆ ಯಾವ ಪಾಪವೂ ತಟ್ಟದು.

ಜೀವನದಲ್ಲಿ ಸುಖ-ದುಃಖ ಎನ್ನುವುದು ಅನಿವಾರ್ಯ. ಸುಖ-ದುಃಖ, ಗಳಿಕೆ-ಇಳಿಕೆ, ಸೋಲು-ಗೆಲುವು ಎಲ್ಲವನ್ನೂ ಸಮನಾಗಿ ಕಾಣುವವನಿಗೆ ಯಾವ ಪಾಪವೂ ಅಂಟದು. ಎಲ್ಲವನ್ನು ಸಮದೃಷ್ಟಿಯಿಂದ ಕಾಣುತ್ತಾ, ಕೇವಲ ಕರ್ತವ್ಯ ಪ್ರಜ್ಞೆಯಿಂದ ಹೋರಾಟ ಮಾಡುವುದು ಬದುಕಿನ ಯಶಸ್ಸಿನ ಸೂತ್ರ. ಜಯಿಸಬೇಕು ಎನ್ನುವ ಸ್ವಾರ್ಥವಿಲ್ಲದೇ; ನಾವೇ ಲಾಭ ಗಳಿಸಬೇಕು-ಅವರು ಮಣ್ಣು ಮುಕ್ಕಲಿ ಎನ್ನುವ ದ್ವೇಷವಿಲ್ಲದೇ, ಎಲ್ಲವೂ ಭಗವಂತನ ಪ್ರಸಾದ ಎನ್ನುವ ಮನೋಭಾವನೆಯಿಂದ ಹೋರಾಡು ಎನ್ನುತ್ತಾನೆ ಕೃಷ್ಣ.
ಭಗವಂತನ ಈ ನುಡಿಯನ್ನು ಮನುಷ್ಯ ತನ್ನ ಜೀವನದಲ್ಲಿ ಅಳವಡಿಸಿಕೊಂಡರೆ ಆತ ಎಂದೂ ದುಃಖಿ ಆಗಲಾರ. "ಬಂದದ್ದೆಲ್ಲಾ ಬರಲಿ ಗೋವಿಂದನ ದಯೆಯೊಂದಿರಲಿ" ಎಂದು ಧರ್ಮ ಮಾರ್ಗದಲ್ಲಿ ಮುನ್ನುಗ್ಗುವವನಿಗೆ ಸದಾ ಸ್ವರ್ಗದ ಬಾಗಿಲು ತೆರೆದಿರುತ್ತದೆ. ಆತನಿಗೆ ದುಃಖ-ದುಃಖವಾಗಿ ಕಾಣಲಾರದು, ಸೋಲು-ಸೋಲಾಗಿ ಕಾಣಲಾರದು. ಆತನಿಗೆ ಇಹವೂ-ಸ್ವರ್ಗ ಪರವೂ-ಸ್ವರ್ಗ.
ಇಲ್ಲಿಯವರೆಗೆ ಕೃಷ್ಣ ಆತ್ಮತತ್ವದ ಬಗೆಗೆ ಸಾಕಷ್ಟು ವಿವರಣೆಯನ್ನು ಅರ್ಜುನನಿಗೆ ಹೇಳಿದ. ಬದುಕು ಅಂದರೇನು? ಸಾವು ಅಂದರೇನು? ಆತ್ಮ-ಪರಮಾತ್ಮ, ಆ ತತ್ವಗಳ ಅಂತರಂಗದ ರಹಸ್ಯವೇನು? ಇವು ಹೇಗೆ ಯಾವ ಬದಲಾವಣೆಯೂ ಇಲ್ಲದೇ ಅನಾದಿನಿತ್ಯ ಎನ್ನುವುದನ್ನು ವಿವರಿಸಿ, ಯುದ್ಧದ ಅವಶ್ಯಕತೆಯನ್ನು ಹೇಳಿದ. ಇಲ್ಲಿಂದ ಮುಂದೆ ಕೃಷ್ಣ ಸಾಂಖ್ಯದಿಂದ ಕರ್ಮದ ಕಡೆ ತಿರುಗುತ್ತಾನೆ.
ನಾವು ಮನಸ್ಸಿನಲ್ಲಿ ವೇದಾಂತವನ್ನು ಎಷ್ಟು ರೂಢಿಸಿಕೊಂಡರೂ, ತತ್ಕಾಲದ ಮನುಷ್ಯನ ದುಃಖ ಅದಮ್ಯವಾಗಿರುತ್ತದೆ-ಎನ್ನುವುದನ್ನು ಗೀತೆ ಸ್ಪಷ್ಟವಾಗಿ ತಿಳಿಸುತ್ತದೆ. ಭಗವಂತನಿಂದ ಗೀತೆಯ ಉಪದೇಶವನ್ನು ಪಡೆದ ಅರ್ಜುನ, ತನ್ನ ಮಗ ಅಭಿಮನ್ಯು ಯುದ್ಧದಲ್ಲಿ ಸತ್ತಾಗ ಪುನಃ ವಿಚಲಿತನಾಗುವುದನ್ನು ನಾವು ಮಹಾಭಾರತದಲ್ಲಿ ಕಾಣುತ್ತೇವೆ. ಪೂರ್ಣವಾದ ಆತ್ಮಸಾಕ್ಷಾತ್ಕಾರ ಪಡೆಯುವುದು ಅಷ್ಟು ಸುಲಭದ ವಿಷಯವಲ್ಲ. ಆತ್ಮ ಅಜರ-ಅಮರ ಎಂದು ತಿಳಿದರಷ್ಟೇ ಸಾಲದು, ಪೂರ್ಣವಾಗಿ ತಿಳಿಯಬೇಕು. ಅಂತಹ ಸ್ಥಿತಿಯಲ್ಲಿ ಎಲ್ಲಾ ದುಃಖವನ್ನು ಮರೆತು ಇರಬಹುದು. ಆದರೆ ಈ ಆತ್ಮ ತತ್ವವನ್ನು ತಿಳಿಯುವ ಬಗೆ ಹೇಗೆ? ಆತ್ಮದ ಜ್ಞಾನವನ್ನು ಪಡೆಯುವ ಸಾಧನವೇನು? ಕೇಳಿದ ತಕ್ಷಣ ಸಾಕ್ಷಾತ್ಕಾರವಾಗಿ ಮನಸ್ಸಿನಲ್ಲಿ ಗಟ್ಟಿಯಾಗಿ ನಿಲ್ಲುವ ವಿಷಯ ಇದಲ್ಲ.

ಅಂದಮೇಲೆ ಮಾನಸಿಕವಾಗಿ ಈ ಉತ್ತುಂಗದ ಸ್ಥಿತಿಯನ್ನು ತಲುಪುವುದು ಹೇಗೆ ಎಂದು ಕೃಷ್ಣ ಮುಂದೆ ವಿವರಿಸುತ್ತಾನೆ.

ಏಷಾ ತೇಽಭಿಹಿತಾ ಸಾಂಖ್ಯೇ ಬುದ್ಧಿರ್ಯೋಗೇ ತ್ವಿಮಾಂ ಶೃಣು ।
ಬುದ್ಧ್ಯಾ ಯುಕ್ತೋ ಯಯಾ ಪಾರ್ಥ ಕರ್ಮ ಬಂಧಂ ಪ್ರಹಾಸ್ಯಸಿ॥ ೩೯॥

ಏಷಾ ತೇ ಅಭಿಹಿತಾ ಸಾಂಖ್ಯೇ ಬುದ್ಧಿಃ ಯೋಗೇ ತು ಇಮಾಮ್ ಶೃಣು ।
ಬುದ್ಧ್ಯಾ ಯುಕ್ತಃ ಯಯಾ ಪಾರ್ಥ ಕರ್ಮ ಬಂಧಮ್ ಪ್ರಹಾಸ್ಯಸಿ -- ಈ ಆತ್ಮ ವಿಜ್ಞಾನದ ತಿಳಿನುಡಿ ನಿನಗೆ ತಿಳಿಸಿದ್ದಾಯ್ತು, ಅದನ್ನು ಗಳಿಸುವ ಬಗೆಯನ್ನು ಇದೀಗ ಕೇಳು. ಪಾರ್ಥಾ, ಈ ತಿಳಿನುಡಿಯಿಂದ ನೀನು ತಿಳಿಯಾದಾಗ ಕರ್ಮದ ಕಟ್ಟನ್ನು ಕಳೆದುಕೊಳ್ಳುವೆ.

ಕೃಷ್ಣ ಹೇಳುತ್ತಾನೆ: " ಇಲ್ಲಿಯವರೆಗೆ ಸಾಂಖ್ಯದ ಬಗ್ಗೆ ಹೇಳಿದ್ದಾಯ್ತು. ಇನ್ನು ಯೋಗದ ಬಗ್ಗೆ ಹೇಳುತ್ತೇನೆ ಕೇಳು" ಎಂದು. ಇಲ್ಲಿ ಕೃಷ್ಣ ಹೇಳುತ್ತಿರುವ ಸಾಂಖ್ಯಾ - 'ವೈದಿಕ ಸಾಂಖ್ಯ'. ವೈದಿಕ ಸಾಂಖ್ಯವನ್ನು ಪ್ರಚಾರಕ್ಕೆ ತಂದವ ಕಪಿಲವಾಸುದೇವ. ಸಂಖ್ಯಾ ಅಂದರೆ ಸಮ್ಯಕ್ ಖ್ಯಾತಿ ಅಥವಾ ಸರಿಯಾದ ಅರಿವು. ಇದು ಆತ್ಮದ ಅರಿವನ್ನು ಕೊಡುವ ಮೂಲತತ್ವ. ಈ ಕಾರಣದಿಂದ ಪ್ರಾಚೀನರು ಜ್ಞಾನವನ್ನು ಸಾಂಖ್ಯ ಎಂದು ಕರೆದರು. ಇಲ್ಲಿ ಸಾಂಖ್ಯ ಎಂದರೆ ಖಚಿತವಾದ ಆತ್ಮ ಜ್ಞಾನ.

ಇಲ್ಲಿ ಹೇಳುತ್ತಿರುವ ಯೋಗ ಪತಂಜಲಿಯ ಯೋಗವಲ್ಲ, ವೈದಿಕ ಯೋಗ. ಸಾಮಾನ್ಯ ಯೋಗಕ್ಕೆ ದೇವರ ಅಸ್ತಿತ್ವದ ಧೃಡ ನಂಬಿಕೆ ಬೇಕಿಲ್ಲ. ಮನಸ್ಸನ್ನು ಯಾವುದೋ ಒಂದರ ಮೇಲೆ ನಿರಂತರ ಏಕಾಗ್ರತೆ ಮಾಡುವುದರಿಂದ ಅನೇಕ ಪವಾಡಗಳನ್ನು ಮಾಡಬಹುದು. ಆದರೆ ಇದು ನಿಜವಾದ ಆತ್ಮ ಸಾಕ್ಷಾತ್ಕಾರವಲ್ಲ. ಹತ್ತು ವರ್ಷ ಯೋಗ ಸಾಧನೆ ಮಾಡಿ ನೀರಿನ ಮೇಲೆ ನಡೆಯಲು ಕಲಿತವನ ಕಥೆಯನ್ನು ನಾವೆಲ್ಲರೂ ಕೇಳಿದ್ದೇವೆ. ಈ ರೀತಿ ಯೋಗದಿಂದ ಪವಾಡಗಳನ್ನು ಕಲಿತು ಪ್ರದರ್ಶಿಸುವುದನ್ನು ವೈದಿಕ ಯೋಗ ನಿಷೇಧಿಸುತ್ತದೆ. ಎಂತಹ ಅಂತಃಶಕ್ತಿ ಪಡೆದರೂ ಅದನ್ನು ಪ್ರದರ್ಶಿಸಕೂಡಾದು. ನೀರಿನ ಮೇಲೆ ನಡೆಯಲು ಕಲಿತ ತಕ್ಷಣ ನಮಗೆ ಆತ್ಮ ಸಾಕ್ಷಾತ್ಕಾರವಾಗದು. ಇಂತಹ ಇಂದ್ರಜಾಲವನ್ನು ಯಾರು ಬೇಕಾದರೂ ಗಳಿಸಬಹುದು. ಇಲ್ಲಿ ಕೃಷ್ಣ ಹೇಳುತ್ತಿರುವುದು ಆತ್ಮ ತತ್ವವನ್ನು ಪಡೆಯುವುದಕ್ಕೆ ಜೀವನದಲ್ಲಿ ಮಾಡಬೇಕಾದ ಸಾಧನೆ ಏನು ಎನ್ನುವ ವಿಷಯ.

ಸಾಂಖ್ಯವನ್ನು ತಿಳಿಯುವ ಮಾತನ್ನು ಹೇಳಿದೆ, ಇನ್ನು ಜ್ಞಾನದ ದಾರಿಯಲ್ಲಿ ಸಾಗಿ ಸಿದ್ಧಿ ಪಡೆಯಬೇಕಾದರೆ ಬೇಕಾದ ಉಪಾಯವನ್ನು(ಯೋಗವನ್ನು) ಹೇಳುತ್ತೇನೆ ಕೇಳು ಎನ್ನುತ್ತಾನೆ ಕೃಷ್ಣ. ಯಾವ ಅರಿವನ್ನು ಪಡೆದರೆ ಸಾಧನೆಯ ದಾರಿಯಲ್ಲಿ ಕರ್ಮ ಬಂಧನವನ್ನು ದಾಟಿ ಮುನ್ನಡೆಯಬಹುದು ಎನ್ನುವುದನ್ನು ಕೃಷ್ಣ ಮುಂದೆ ವಿವರಿಸುತ್ತಾನೆ. ಅಧ್ಯಾತ್ಮದ ಸಾಧನೆ ಅಂದರೇನು, ನಮ್ಮ ಜೀವನದಲ್ಲಿ ಅಧ್ಯಾತ್ಮದ ಸಾಧನೆ ಹೇಗಿರಬೇಕು, ಅದನ್ನು ಸಾಧಿಸುವುದು ಹೇಗೆ ಎನ್ನುವುದು ನಾವು ತಿಳಿಯಬೇಕಾದ ಮುಖ್ಯವಾದ ವಿಷಯ.

ಅನೇಕ ಮಂದಿ ಹೊರಗಿನಿಂದ ಹೇಗಿರಬೇಕು ಎಂದು ಅನೇಕ ರೀತಿ ಹೇಳುತ್ತಾರೆ. ಆದರೆ ಒಳಗಿನಿಂದ ಹೇಗಿರಬೇಕು ಎನ್ನುವುದನ್ನು ಯಾರೂ ಹೇಳುವುದಿಲ್ಲ. ಇಷ್ಟು ಹೊತ್ತು ಜಪ ಮಾಡಬೇಕು, ಈ ರೀತಿ ಮಡಿಯಾಗಿರಬೇಕು, ಇಷ್ಟು ಮಂತ್ರ ಹೇಳಬೇಕು ಇತ್ಯಾದಿ ವಿಚಾರವನ್ನು ಎಲ್ಲರೂ ಹೇಳುತ್ತಾರೆ. ಆದರೆ ಅಂತರಂಗ ಹೇಗಿರಬೇಕು ಎನ್ನುವುದು ಹೆಚ್ಚಿನವರಿಗೆ ತಿಳಿದಿಲ್ಲ. ಅಂತರಂಗದ ಸಾಧನೆ ಇಲ್ಲದೆ ಕೇವಲ ಬಾಹ್ಯ ವೇಷದಿಂದ, ಜಪ-ತಪದಿಂದ, ಏನನ್ನೂ ಸಾಧಿಸಲು ಸಾಧ್ಯವಿಲ್ಲ. ಯೋಗ ಸಾಧನೆ ಎಂದರೆ ನಾವು ಯಾವ ಬಟ್ಟೆ ತೊಡುತ್ತೇವೆ, ಮೈಗೆ ಏನು ಹಚ್ಚಿಕೊಳ್ಳುತ್ತೇವೆ ಎನ್ನುವುದಲ್ಲ. ಅದು ನಮ್ಮ ಅಂತರಂಗದ ನಡೆ. ಅಂತರಂಗ ಮತ್ತು ಬಹಿರಂಗ ಏಕವಾಗಿರುವ ಸ್ಥಿತಿ. ನಮ್ಮ ನಡೆ, ನಮ್ಮ ನಂಬಿಕೆ, ನಮ್ಮ ಪ್ರಾಮಾಣಿಕತೆಯೇ ನಮ್ಮ ನಿಜವಾದ ಧರ್ಮ. ಅಂತಹ ಅಂತರಂಗದ ಸಾಧನೆ ಅತಿ ಮುಖ್ಯ. ಅದನ್ನು ಕೃಷ್ಣ ಮುಂದೆ ವಿವರಿಸುತ್ತಾನೆ.

ಜ್ಞಾನ ಬೇಕು ನಿಜ, ಆದರೆ ಆತ್ಮ ಜ್ಞಾನವನ್ನು ಪಡೆಯಲು ನಮ್ಮ ಸಾಧನೆ ಏನಿರಬೇಕು, ಈ ಸಂಸಾರ ಬಂಧವನ್ನು ಕಳಚಿಕೊಳ್ಳುವ ಸಾಧನೆ ಯಾವುದು, ಎನ್ನುವುದನ್ನು ಮುಂದಿನ ಶ್ಲೋಕಗಳಲ್ಲಿ ಸುವಿವರವಾಗಿ ಕಾಣುತ್ತೇವೆ.

ನೇಹಾಭಿಕ್ರಮನಾಶೋSಸ್ತಿ ಪ್ರತ್ಯವಾಯೋ ನ ವಿದ್ಯತೇ ।
ಸ್ವಲ್ಪಮಪ್ಯಸ್ಯ ಧರ್ಮಸ್ಯ ತ್ರಾಯತೇ ಮಹತೋ ಭಯಾತ್ ॥೪೦॥

ನ ಇಹ ಅಭಿಕ್ರಮ ನಾಶಃ ಅಸ್ತಿ ಪ್ರತ್ಯವಾಯಃ ನ ವಿದ್ಯತೇ ।
ಸು ಅಲ್ಪಮ್ ಅಪಿ ಅಸ್ಯ ಧರ್ಮಸ್ಯ ತ್ರಾಯತೇ ಮಹತಃ ಭಯಾತ್ -- ಇಲ್ಲಿ ತೊದಲು ಹೆಜ್ಜೆ ಕೂಡಾ ಹಾಳಾಗದು. ಇಲ್ಲಿ ತೊಡರುಗಳಿಲ್ಲ; ಈ ಧರ್ಮದ ತುಣುಕು ಕೂಡಾ ದೊಡ್ಡ ಬೆದರಿನಿಂದ ಪಾರುಮಾಡಬಲ್ಲುದು.

ಸಾಧನೆಯ ಬಗ್ಗೆ ಹೇಳುವ ಮೊದಲು ಕೃಷ್ಣ ನಮಗೆ ಬರಬಹುದಾದ ಒಂದು ಸಂಶಯವನ್ನು ಈ ಶ್ಲೋಕದಲ್ಲಿ ಪರಿಹರಿಸಿದ್ದಾನೆ. ಎಲ್ಲರನ್ನೂ ಒಂದು ಪ್ರಶ್ನೆ ಕಾಡಬಹುದು. ಅದೇನೆಂದರೆ: ಮೊದಲು ಹುಟ್ಟು, ಆನಂತರ ಅಧ್ಯಯನ, ಸಾಧನೆ, ನಂತರ ಸಾವು. ಪುನಃ ಮರು ಹುಟ್ಟು ಮತ್ತೆ ಅದೇ ಸಾಧನೆ ಮತ್ತೆ ಸಾವು! ಇದರಿಂದ ಏನು ಉಪಯೋಗ ಎಂದು. ಒಂದು ಜನ್ಮದಲ್ಲಿ ಬ್ರಹ್ಮಸಾಕ್ಷಾತ್ಕಾರವಾಗದೇ ಇದ್ದರೆ ಆ ಎಲ್ಲಾ ಸಾಧನೆ ವ್ಯರ್ಥವೇ? ಖಂಡಿತವಾಗಿ ಇಲ್ಲ ಎನ್ನುತ್ತಾನೆ ಕೃಷ್ಣ. ನಮ್ಮ ಜೀವನದಲ್ಲಿ ಗಳಿಸಿದ ಐಹಿಕ ಸಂಪತ್ತು(ಧನ, ಒಡವೆ, ಕೀರ್ತಿ, ಆಸ್ತಿ ಇತ್ಯಾದಿ) ಸತ್ತ ನಂತರ ನಮ್ಮೊಂದಿಗೆ ಬಾರದು ನಿಜ. ಆದರೆ ಅಧ್ಯಾತ್ಮ ಸಾಧನೆ ಹಾಗಲ್ಲ. ಒಂದು ಜನ್ಮದಲ್ಲಿ ಮಾಡಿದ ಅಧ್ಯಾತ್ಮ ಸಾಧನೆ ಎಂದೂ ನಾಶವಾಗದು. ಈ ಜನ್ಮದಲ್ಲಿ ಅಧ್ಯಾತ್ಮದ ಒಂದು ಮೆಟ್ಟಿಲನ್ನು ಹತ್ತಿದರೆ ಮುಂದಿನ ಜನ್ಮದಲ್ಲಿ ಹುಟ್ಟುವಾಗಲೇ ನಾವು ಎರಡನೇ ಮೆಟ್ಟಲಲ್ಲಿರುತ್ತೇವೆ. ಹಿಂದಿನ ಜನ್ಮದಲ್ಲಿ ಎಲ್ಲಿ ನಿಂತಿದ್ದೇವೋ ಅಲ್ಲಿಂದ ಮುಂದುವರಿಯುವ ಪರಿಸರದಲ್ಲಿ ನಮ್ಮ ಜನನವಾಗುತ್ತದೆ. ಸಾಮಾಜಿಕವಾಗಿ ನೀವು ಅಸಾಧಾರಣ ಪ್ರತಿಭೆಯುಳ್ಳ ಮಕ್ಕಳು ಜನಿಸುವುದನ್ನು, ಹಾಗೂ ಅತ್ಯಂತ ಕಡಿಮೆ ಸಮಯದಲ್ಲಿ ಮಹಾನ್ ಸಾಧನೆ ಮಾಡುವುದನ್ನು ಕಾಣುತ್ತೀರಿ. ಇದು ಅವರು ಹಿಂದಿನ ಜನ್ಮದಿಂದ ಪಡೆದು ಬಂದ ಜ್ಞಾನ. ಹಿಂದಿನ

ಜನ್ಮದ ಅಧ್ಯಾತ್ಮದ ಸಾಧನೆಯ ಮುಂದುವರಿದ ಭಾಗವೇ ಈ ಜನ್ಮ. ನಾವು ಆ ಜನ್ಮದಲ್ಲಿ ಎಲ್ಲಿ ನಿಲ್ಲಿಸಿದ್ದೇವೋ ಅಲ್ಲಿಂದಲೇ ಈ ಜನ್ಮದ ಸಾಧನೆ ಪ್ರಾರಂಭವಾಗಿ ಮುಂದುವರಿಯುತ್ತದೆ.

ಒಂದು ವೇಳೆ ನಮಗೆ ಅಧ್ಯಾತ್ಮ ಸಾಧನೆ ಮಾಡಬೇಕು ಎನ್ನುವ ಅಂತರಂಗದ ತುಡಿತವಿದ್ದು, ಅದನ್ನು ಈ ಜನ್ಮದಲ್ಲಿ ಸಾಧಿಸಲಾಗದಿದ್ದಲ್ಲಿ ಮುಂದಿನ ಜನ್ಮದಲ್ಲಿ ಸಾಧನೆಗೆ ಬೇಕಾದ ವಾತಾವರಣದಲ್ಲಿ, ವಿದ್ವಾಂಸರ ಸಂಗವಿರುವ ಕಡೆ ನಮ್ಮ ಜನ್ಮವಾಗುತ್ತದೆ. ಆದ್ದರಿಂದ ನಮ್ಮ ಅಧ್ಯಾತ್ಮ ಚಿಂತನೆಯಲ್ಲಿ ನಮ್ಮ ಒಂದೊಂದು ಜನ್ಮ ಒಂದೊಂದು ತರಗತಿ ಇದ್ದಂತೆ. ಒಂದು ಗ್ರಂಥವನ್ನು ಸಂಪೂರ್ಣ ತಿಳಿಯಲು ನಾವು ಅನೇಕ ಜನ್ಮ ಸಾಧನೆ ಮಾಡಬೇಕು. ಈ ಕಾರಣದಿಂದ ಅಧ್ಯಾತ್ಮ ಸಾಧನೆ ಎಂದೂ ವ್ಯರ್ಥವಲ್ಲ. ಇಂದು ನೀವು ನಿಮ್ಮ ಜೀವನದ ಯಾವ ಘಟ್ಟದಲ್ಲಿದ್ದರೂ ಸರಿ, ಅಧ್ಯಾತ್ಮ ಸಾಧನೆಗೆ ಇದು ಸಕಾಲ. ಇಂದೇ ನಿಮ್ಮ ಸಾಧನೆಯನ್ನು ಆರಂಭಿಸಿ. ಅದು ನಿಮ್ಮನ್ನು ಮೋಕ್ಷ ಮಾರ್ಗದತ್ತ ಕೊಂಡೊಯ್ಯುತ್ತದೆ ಎನ್ನುವುದು ಕಟುಸತ್ಯ. ಅಧ್ಯಾತ್ಮ ಪ್ರದರ್ಶನದ ವಸ್ತುವಲ್ಲ, ಅದು ಅಂತರಂಗದ ಸಾಧನೆ. ನಮ್ಮ ಜನ್ಮದಲ್ಲಿ ನಾವು ಅಧ್ಯಾತ್ಮದ ಕಿಂಚಿತ್ ಸಾಧನೆ ಮಾಡಿದರೂ ಕೂಡಾ, ಅದು ನಮ್ಮನ್ನು ಭಯದಿಂದ ಪಾರು ಮಾಡುತ್ತದೆ. ಭಯದಿಂದ ಅಭಯದತ್ತ ನಮ್ಮನ್ನು ಸಾಗಿಸುವ ಏಕಮಾತ್ರ ಸಾಧನ ಅಧ್ಯಾತ್ಮ.

ಸಾಧಕರಲ್ಲಿ ಮೂರು ವಿಧ. ಉತ್ತಮ ಸಾಧಕ, ಮಧ್ಯಮ ಸಾಧಕ, ಅಧಮ ಸಾಧಕ. ಉತ್ತಮ ಸಾಧಕ ದೇವರು ಒಬ್ಬನೇ ಎಂದು ನಂಬಿರುತ್ತಾನೆ. ಇಂತಹ ಭಕ್ತರನ್ನು ಭಾಗವತರು ಎನ್ನುತ್ತಾರೆ. ಆತನಿಗೆ ಭಗವಂತನಲ್ಲಿ ಏಕನಿಷ್ಠೆ ಇರುತ್ತದೆ. ಭಗವಂತನನ್ನು ಯಾವ ಶಬ್ದದಿಂದ ಕರೆದರೂ ಅದು ಆ ಆದಿಶಕ್ತಿಯಾದ ಪರಶಕ್ತಿಯನ್ನು ಹೇಳುತ್ತದೆ ಎನ್ನುವ ಸತ್ಯವನ್ನು ಆತ ತಿಳಿದಿರುತ್ತಾನೆ. ಈತ ನಿಜವಾದ ಸಾಧಕ, ಹಾಗೂ ಇದು ಸಾಧನೆಯ ನಿಜವಾದ ದಾರಿ. ಇನ್ನು ಮಧ್ಯಮ ಸಾಧಕರು: ಇವರು ಪ್ರತಿಯೊಂದು ದೇವತೆಯನ್ನು ಪರಿ ಪರಿಯಾಗಿ ಪೂಜಿಸಿ ಕೊನೆಗೆ "ಕೃಷ್ಣಾರ್ಪಣ ಮಸ್ತು" ಎಂದು ಭಗವಂತನಿಗೆ ಅರ್ಪಿಸುತ್ತಾರೆ. ಇವರನ್ನು ತ್ರೈವಿಧ್ಯರು ಎನ್ನುತ್ತಾರೆ. ಇನ್ನು ಅಧಮ ಸಾಧಕ; ಈತ ದೇವರು ನೂರಾರು ಎಂದು ನಂಬಿ ಪೂಜಿಸುತ್ತಿರುತ್ತಾನೆ. ಭಗವಂತ ಸರ್ವಾಂತರ್ಯಾಮಿ ಎನ್ನುವ ಭಾವನೆ ಈತನಿಗಿರುವುದಿಲ್ಲ. ಈತನಿಗೆ ಅಧ್ಯಾತ್ಮದ ನಿಜವಾದ ಕಲ್ಪನೆ ಇರುವುದಿಲ್ಲ. ಆದ್ದರಿಂದ ಇದು ನಿಜವಾದ ಅಧ್ಯಾತ್ಮ ಸಾಧನೆ ಆಗದು.

ನಾವು ಏಕನಿಷ್ಠೆಯಿಂದ ಮಾಡುವ ಸಾಧನೆ ಎಂದೂ ವ್ಯರ್ಥವಾಗದು. ಇಲ್ಲಿ ತೋರ್ಪಡಿಕೆಯ ಅಗತ್ಯವಿಲ್ಲ. ಆದರೆ ಪ್ರಾಮಾಣಿಕ ನಿಷ್ಠೆ ಅಗತ್ಯ. ಗಣಪತಿಯನ್ನು ಪೂಜಿಸು, ವಾಯುವನ್ನು ಪೂಜಿಸು, ಸೂರ್ಯನನ್ನು ಪೂಜಿಸು, ಅಲ್ಲಾ ಎಂದು, ಯೇಸು ಎಂದು, ಶಿವನೆಂದು, ವಿಷ್ಣುವೆಂದು, ಏನೇ ಅಂದು ಪೂಜಿಸಿದರೂ ಕೂಡಾ, ಎಲ್ಲಾ ಶಬ್ದಗಳೂ ಆದಿಶಕ್ತಿಯಾದ ಪರಶಕ್ತಿ ಎನ್ನುವ ಸತ್ಯ ತಿಳಿದು, ಏಕನಿಷ್ಠೆ ಇಟ್ಟು, ಪರಿಶುದ್ಧ ಪ್ರಾಮಾಣಿಕ ಚಿಂತನೆ ಮಾಡಿದಾಗ ಅದು ನಿಜವಾದ ಅಧ್ಯಾತ್ಮ ಸಾಧನೆಯಾಗುತ್ತದೆ ಹಾಗೂ ವ್ಯರ್ಥವಾಗದೇ ನಮ್ಮೊಂದಿಗೆ ಬರುತ್ತದೆ. ಇಂತಹ ಸಾಧನೆಯಲ್ಲಿ ದ್ವೇಷ, ಸ್ವಾರ್ಥ, ಅಹಂಕಾರ, ದುಃಖ ಎಂದೂ ಇರುವುದಿಲ್ಲ. ಎಲ್ಲವೂ ಭಗವಂತನ ಪ್ರಸಾದ ಎನ್ನುವ ಭಾವನೆ ನಮ್ಮನ್ನು ಎತ್ತರಕ್ಕೆ ಕೊಂಡೊಯ್ಯುತ್ತದೆ.

ವ್ಯವಸಾಯಾತ್ಮಿಕಾ ಬುದ್ಧಿರೇಕೇಹ ಕುರುನಂದನ।
ಬಹುಶಾಖಾ ಹ್ಯನನಂತಾಶ್ಚ ಬುದ್ಧಯೋಽವ್ಯವಸಾಯಿನಾಮ್ ॥೪೧॥

ವ್ಯವಸಾಯ ಆತ್ಮಿಕಾ ಬುದ್ಧಿಃ ಏಕಾ ಇಹ ಕುರುನಂದನ |
ಬಹುಶಾಖಾಃ ಹಿ ಅನಂತಾಃ ಚ ಬುದ್ಧಯಃ ಅವ್ಯವಸಾಯಿನಾಮ್--ಕುರುಕುಮಾರಾ, ಈ ದಾರಿಯಲ್ಲಿ ಮನನದಿಂದ ಹದಗೊಂಡ ಮಾತು ಒಂದೇ ತರ. ಹದವಿರದವರ ತುದಿಯಿರದ ಹರಟೆಗಳಿಗೆ ಹತ್ತು ಹಲವು ಟಿಸಿಲುಗಳು.

ಏಕನಿಷ್ಠೆಯಿಂದ ನಾವು ಮಾಡುವ ಸಾಧನೆ ವ್ಯರ್ಥವಲ್ಲ ಎನ್ನುವ ವಿಷಯ ನಮಗೆ ತಿಳಿಯಿತು, ಆದರೆ ಯಾವುದು ಸರಿ ಹಾಗೂ ಯಾವುದು ತಪ್ಪು ಎನ್ನುವುದನ್ನು ತಿಳಿಯುವ ಬಗೆ ಹೇಗೆ? ಕೃಷ್ಣ ಈ ಶ್ಲೋಕದಲ್ಲಿ ನಮ್ಮ ಪ್ರಶ್ನೆಗೆ ಉತ್ತರ ಕೊಟ್ಟಿದ್ದಾನೆ.
ಎಲ್ಲಾ ಕಾಲದಲ್ಲೂ ನಿರ್ಣಾಯಕವಾದ ಮಾತು ಏಕರೂಪವಾಗಿರುತ್ತದೆ. ನಿರ್ಣಯ ಇಲ್ಲದೆ ಆಡುವ ಮಾತು ಒಂದೊಂದು ಒಂದೊಂದು ತರಹ. ಗೊತ್ತಿಲ್ಲದೆ ಅಜ್ಞಾನದಿಂದ ಆಡುವ ಮಾತುಗಳಿಗೆ ತಲೆಬುಡವಿಲ್ಲದ ಅನಂತ ಶಾಖೆ. ಆದರೆ ನಿಜವಾಗಿ ತಿಳಿದವರ ನಿರ್ಣಯಾತ್ಮಕವಾದ ಮಾತು ಸದಾ ಒಂದೇ ಆಗಿರುತ್ತದೆ. ಆದ್ದರಿಂದ ಸತ್ಯವನ್ನು ಅರಿತವರ ಮಾರ್ಗದರ್ಶನದಂತೆ ನಡೆ ಎನ್ನುತ್ತಾನೆ ಕೃಷ್ಣ.

ಯಾಮಿಮಾಂ ಪುಷ್ಪಿತಾಂ ವಾಚಂ ಪ್ರವದಂತ್ಯವಿಪಶ್ಚಿತಃ ।
ವೇದವಾದರತಾಃ ಪಾರ್ಥ ನಾನ್ಯದಸ್ತೀತಿ ವಾದಿನಃ ॥೪೨॥

ಯಾಮ್ ಇಮಾಮ್ ಪುಷ್ಪಿತಾಮ್ ವಾಚಮ್ ಪ್ರವದಂತಿ ಅವಿಪಶ್ಚಿತಃ |
ವೇದವಾದರತಾಃ ಪಾರ್ಥ ನ ಅನ್ಯತ್ ಅಸ್ತಿ ಇತಿ ವಾದಿನಃ -- ಓ ಪಾರ್ಥಾ, ಅರೆಬರೆ ತಿಳಿದವರು ಹೇಳುತ್ತಾರೆ: ಈ ವೇದವಾಣಿ ಸ್ವರ್ಗವೆಂಬ ಹೂಬಿಡುವ ಬಳ್ಳಿ. ಹುಟ್ಟು ಕರ್ಮದ ಕಟ್ಟುಗಳ ಸಂಸಾರವೇ ಇದರ ಹಣ್ಣು.

ಕಾಮಾತ್ಮಾನಃ ಸ್ವರ್ಗಪರಾ ಜನ್ಮಕರ್ಮಫಲಪ್ರದಾಮ್ ।
ಕ್ರಿಯಾವಿಶೇಷಬಹುಲಾಂ ಭೋಗೈಶ್ವರ್ಯಗತಿಂ ಪ್ರತಿ ॥೪೩॥

ಕಾಮ ಆತ್ಮಾನಃ ಸ್ವರ್ಗ ಪರಾಃ ಜನ್ಮ ಕರ್ಮ ಫಲ ಪ್ರದಾಮ್ |
ಕ್ರಿಯಾ ವಿಶೇಷ ಬಹುಲಾಮ್ ಭೋಗ ಐಶ್ವರ್ಯ ಗತಿಮ್ ಪ್ರತಿ -- ಐಷಾರಾಮದ ಐಸಿರಿಯ ಬದುಕಿಗಾಗಿ ಅದರ ತುಂಬಾ ಬಗೆ ಬಗೆಯ ಕರ್ಮ ಕಲಾಪಗಳು. ಅವರು ವೇದದ ಹೊರನೋಟದ ಅರ್ಥದಲ್ಲೇ ನಿಂತುಬಿಡುವರು. [ವೇದದಲ್ಲಿ ವಿವಾದ ಬೆಳೆಸುವವರು, ಅಥವಾ ಅರ್ಥವನ್ನರಿಯದೇ ಬರಿದೆ ಉರು ಹೊಡೆಯುವವರು] ಅದರಾಚೆ ಏನೂ ಇಲ್ಲ ಎನ್ನುವವರು. ಬಗೆಯಲ್ಲಿ ಆಸೆ ತುಂಬಿ ಸ್ವರ್ಗದ ಕನಸು ಕಾಣುವವರು.

ಭೋಗೈಶ್ವರ್ಯಪ್ರಸಕ್ತಾನಾಂ ತಯಾಽಪಹೃತಚೇತಸಾಮ್ ।
ವ್ಯವಸಾಯಾತ್ಮಿಕಾ ಬುದ್ಧಿಃ ಸಮಾಧೌ ನ ವಿಧೀಯತೇ ॥೪೪॥

ಭೋಗ ಐಶ್ವರ್ಯ ಪ್ರಸಕ್ತಾನಾಮ್ ತಯಾ ಅಪಹೃತ ಚೇತಸಾಮ್ |
ವ್ಯವಸಾಯ ಆತ್ಮಿಕಾ ಬುದ್ಧಿಃ ಸಮಾಧೌ ನ ವಿಧೀಯತೇ- ಐಷಾರಾಮದ ಐಸಿರಿಯಲ್ಲಿ ಮುಳುಗಿ, ವೇದ ಓದಿಯೇ ತಲೆ ಕೆಡಿಸಿಕೊಂಡ ಇಂತವರಿಗೆ, ಹದಗೊಂಡ ತಿಳಿನುಡಿ ಕೂಡಾ ಮನಸ್ಸಿನ ಸಮಸ್ಥಿತಿಗೆ ನೆರವಾಗದು.

ಮೇಲಿನ ಮೂರು ಶ್ಲೋಕ ಅತ್ಯಂತ ಮುಖ್ಯವಾದುದು. ಹೆಚ್ಚಿನವರಿಗೆ ಇದು ಅರ್ಥವೇ ಆಗುವುದಿಲ್ಲ. ಅರ್ಥವಾಗದೇ ಈ ಶ್ಲೋಕವನ್ನು ಟೀಕಿಸಿದವರೂ ಇದ್ದಾರೆ! ಪ್ರಾಚೀನ ಗ್ರಂಥಗಳಲ್ಲಿ, ವೇದಗಳಲ್ಲಿ, ಶ್ರುತಿಗಳಲ್ಲಿ, ಕೇವಲ ಅಧ್ಯಾತ್ಮವಲ್ಲದೆ ಅನೇಕ ಲೌಕಿಕ ವಿಷಯಗಳು ತುಂಬಿಕೊಂಡಂತೆ ಕಾಣುತ್ತದೆ. ಬರಿಯ ವೇದ ಗ್ರಂಥಗಳನ್ನು ಓದುವುದರಿಂದ ನನ್ನನ್ನು ತಿಳಿಯಲು ಸಾಧ್ಯವಿಲ್ಲ ಎನ್ನುತ್ತಾನೆ ಕೃಷ್ಣ. ಕೃಷ್ಣ ಹೇಳುತ್ತಾನೆ ವೇದವಾದಿಗಳಾದವರು ವೇದದ ಮೇಲ್ನೋಟದ ಅರ್ಥವೆಂಬ ಹೂವನ್ನು ಕಿತ್ತು ತೆಗೆದುಕೊಂಡು ಆಳವಾದ ಜ್ಞಾನ ಸಾಗರವೆಂಬ ಹಣ್ಣಿನಿಂದ ವಂಚಿತರಾಗುತ್ತಾರೆ ಎಂದು. ವೇದವನ್ನು ಆಳವಾಗಿ ಅರ್ಥ ಮಾಡಿಕೊಳ್ಳದೇ, ಕೇವಲ ಮೇಲ್ನೋಟದ ಅರ್ಥದಲ್ಲೇ ನಿಂತು ವೇದವೆಂದರೆ ಇಷ್ಟೇ ಎಂದು ಹೇಳುವವರಿಗೆ ಕೃಷ್ಣ ಈ ಮಾತನ್ನು ಹೇಳಿದ್ದಾನೆ. ಇಲ್ಲಿ 'ವೇದವಾದರು' ಎಂದರೆ ವೇದದ ಅರ್ಥ ತಿಳಿಯದೇ ಅದರ ಬಗ್ಗೆ ವಿವಾದ ಮಾಡುವವರು. ವೇದವನ್ನು ಬಾಯಿಪಾಠ ಮಾಡಿ ಅದರ ಅರ್ಥ ತಿಳಿಯದೇ ಮಾತನಾಡುವವರು. ವೇದದ ಮೇಲ್ನೋಟದ ಅರ್ಥದಲ್ಲೇ ನಿಂತವರು. ಇವರು ಮೇಲಿನಿಂದ ಈಜುವವರು. ಇವರಿಗೆ ತಳದಲ್ಲಿರುವ ಮುತ್ತು ರತ್ನಗಳ ಅರಿವಿಲ್ಲ. ವೇದವನ್ನು ನಿಜವಾಗಿ ಅರಿತುಕೊಳ್ಳದೇ, ಅದರ ಬಗ್ಗೆ ತಪ್ಪು ಕಲ್ಪನೆ ಮಾಡಿಕೊಂಡು, ಅದನ್ನೇ ಜನರಿಗೆ ಹೇಳುವುದು ನರಕಕ್ಕೆ ನೇರ ದಾರಿ. ಪೌರೋಹಿತ್ಯ ಕೂಡಾ ಹೀಗೆ. ನಿಜವಾದ ಜ್ಞಾನವಿಲ್ಲದೆ, ಮಂತ್ರದ ಅರ್ಥ ಗೊತ್ತಿಲ್ಲದೆ ಪೌರೋಹಿತ್ಯ ಮಾಡುವುದು ಕೂಡಾ ಅಷ್ಟೇ ಅಪಾಯಕಾರಿ. ಪೌರೋಹಿತ್ಯ ಒಂದು ಜವಾಬ್ದಾರಿಯುತ ಕೆಲಸ. ಒಬ್ಬ ಮನುಷ್ಯನ ಪಾಪವನ್ನು ಪರಿಹರಿಸಿ ಅವನನ್ನು ಎತ್ತರಕ್ಕೇರಿಸಬೇಕಾದರೆ ಪೌರೋಹಿತ್ಯ ಮಾಡುವವನೂ ಕೂಡಾ ಎತ್ತರದಲ್ಲಿರಬೇಕು. ವೇದಮಂತ್ರದ ರಹಸ್ಯ ತಿಳಿದವನಾಗಿರಬೇಕು. ಕೃಷ್ಣ ಇಲ್ಲಿ ಹೇಳುತ್ತಾನೆ: "ವೇದದ ಅಂತರಂಗದ ಅರ್ಥ ತಿಳಿಯದಿದ್ದರೆ ಎಲ್ಲವೂ ಅಪಾರ್ಥವಾಗುತ್ತದೆ. ಯಾರು ಪ್ರಾಚೀನ ಗ್ರಂಥಗಳ ಮೇಲ್ನೋಟದ ಅರ್ಥವನ್ನು ಹೇಳಿ ಸಮಾಜಕ್ಕೆ ಮೋಸ ಮಾಡುತ್ತಾರೋ ಅವರು ಅವಿಪಶ್ಚಿತರು" ಎಂದು. 'ವಿಪಶ್ಚಿತರು' ಎಂದರೆ ಜ್ಞಾನ ಸ್ವರೂಪವಾದ ಆತ್ಮವನ್ನು ಕಂಡವರು, ಆತ್ಮ ಜ್ಞಾನಿಗಳು. ಅವಿಪಶ್ಚಿತರು ಶಾಸ್ತ್ರಕ್ಕೆ ಮೇಲ್ನೋಟದ ಅರ್ಥವನ್ನು ಹೇಳುವವರು-ಅವರು ತಿಳಿಗೇಡಿಗಳು ಎನ್ನುತ್ತಾನೆ ಕೃಷ್ಣ! ಈ ಮಾತು ಪ್ರಪಂಚದ ಪ್ರತಿಯೊಂದು ಧರ್ಮ ಗ್ರಂಥಗಳಲ್ಲಿದೆ. ಬೈಬಲ್ ನಲ್ಲಿ ಇದನ್ನು ಗೂಡಾರ್ಥ ಎನ್ನುತ್ತಾರೆ. ಕುರಾನಿನಲ್ಲಿ ಕೂಡಾ ಈ ಬಗ್ಗೆ ಎಚ್ಚರದ ನುಡಿ ಇದೆ. **"There are Sentences that are clear in meaning and there are Sentences that are susceptible of different interpretations"** . ಇದು ಕುರಾನ್ ನಲ್ಲಿ ಬರುವ ಒಂದು ನುಡಿ. ಎಲ್ಲಾ ಪ್ರಾಚೀನ ಅನುಭಾವ ಸಾಹಿತ್ಯದಲ್ಲಿ ಈ ಎಚ್ಚರವನ್ನು ಕೊಟ್ಟಿದ್ದಾರೆ. ಪ್ರಾಚೀನ ಗ್ರಂಥಗಳು ಒಗಟಿನಂತೆ. ಅದರ ಮೇಲ್ನೋಟದ ಅರ್ಥವನ್ನು ತಿಳಿದುಕೊಂಡರೆ ಅಸಂಗತವಾಗುತ್ತದೆ. ಅಧ್ಯಾತ್ಮ ಗ್ರಂಥಗಳಲ್ಲಿ ನಮ್ಮನ್ನು ಆಭೂತಿಗೆ

ಕೊಂಡೊಯ್ಯಲು ಈ ರೀತಿ ಒಗಟಿನ ಭಾಷೆಯನ್ನು (mystical language) ಉಪಯೋಗಿಸಿದ್ದಾರೆ. ವೇದವೆನ್ನುವುದು ಸಾಂಕೇತಿಕ ಭಾಷೆ ಎನ್ನುವುದನ್ನು ಅರಿಯದಿದ್ದರೆ ಅಧ್ಯಾತ್ಮ ಚಿಂತನೆ ಅನರ್ಥವಾಗುತ್ತದೆ. ಈ ರೀತಿ ತಿಳಿಯದೇ ಮಾಡುವ ಸಾಧನೆಯಿಂದ ಏನೂ ಉಪಯೋಗವಿಲ್ಲ.

ಪ್ರಾಚೀನ ಗ್ರಂಥಗಳಲ್ಲಿ ಅನೇಕ ಕಥೆಗಳನ್ನು ಕಾಣುತ್ತೇವೆ. ಅದನ್ನು ಮೇಲ್ನೋಟದಲ್ಲಿ ನೋಡಿದರೆ ವಿನೋದವೆನಿಸುತ್ತದೆ. ಆದರೆ ಅದರ ತಿರುಳನ್ನು ಅರಿತರೆ ಜೀವನ ಸಾರ್ಥಕ. ಇದಕ್ಕೆ ಉತ್ತಮ ಉದಾಹರಣೆ ಗಣಪತಿಯ ಕಥೆ. "ಪಾರ್ವತಿ ತನ್ನ ಮೈಯ ಮಣ್ಣಿನಿಂದ ಗಣಪತಿಯನ್ನು ನಿರ್ಮಿಸಿದಳು, ಆತನ ತಲೆಯನ್ನು ಶಿವ ಕಡಿದ, ನಂತರ ಆತನಿಗೆ ಉತ್ತರ ದಿಕ್ಕಿಗೆ ತಲೆ ಹಾಕಿದ ಆನೆಯ ತಲೆಯನ್ನು ಜೋಡಿಸಿದರು, ಕಡಬು ತಿಂದ ಗಣೇಶ ಹೊಟ್ಟೆಗೆ ಹಾವನ್ನು ಸುತ್ತಿಕೊಂಡ". ಏನಿದರ ಅರ್ಥ? ಭಾಗಶಃ ಈ ಕಥೆಯನ್ನು ಕೇಳದವರಿಲ್ಲ; ಆದರೆ ಅರ್ಥ ತಿಳಿದವರು ಸಾವಿರಕ್ಕೆ ಒಬ್ಬರಿಲ್ಲ! ಈ ಕಥೆಯನ್ನು ಸೂಕ್ಷ್ಮವಾಗಿ ವಿಶ್ಲೇಷಿಸಿದರೆ ಮಾತ್ರ ನಮಗೆ ಕಥೆಯ ಮಹತ್ವ, ಪೂಜೆಯ ಮಹತ್ವ, ನಂಬಿಕೆಯ ಮಹತ್ವ ಅರಿಯುತ್ತದೆ. ಗಣಪತಿ ಆಕಾಶದ ದೇವತೆ. ಆಕಾಶ ಪಂಚ ಭೂತಗಳಲ್ಲಿ ಮಹತ್ತಾದದ್ದು. ಗಣಪತಿಯ ಸ್ಥಾನ ಇಪ್ಪತ್ತೊಂದನೆಯದು. ಅದಕ್ಕಾಗಿ ಆತನಿಗೆ ಇಪ್ಪತ್ತೊಂದು ಮೋದಕ ಅರ್ಪಣೆ. ಐದು ಅಂತಃಕರಣ, ಐದು ಜ್ಞಾನೇಂದ್ರಿಯ, ಐದು ಕರ್ಮೇಂದ್ರಿಯ, ಐದು ತನ್ಮಾತ್ರೆಗಳು(ಶಬ್ದ, ಸ್ಪರ್ಶ ರೂಪ ರಸ ಗಂಧ) ಇದರಿಂದ ಆಚೆಗೆ ಆಕಾಶ, ಗಾಳಿ, ಬೆಂಕಿ,ನೀರು, ಮಣ್ಣು. ಇಲ್ಲಿ ಆಕಾಶ ಇಪ್ಪತ್ತೊಂದನೇ ಮೆಟ್ಟಿಲಲ್ಲಿದೆ. ಇದು ಇಪ್ಪತ್ತೊಂದನೇ ತತ್ವ. ಗಣಪತಿಗಿಂತ ಮೊದಲ ಸ್ತರದಲ್ಲಿರುವ ತತ್ತ್ವಾಭಿಮಾನಿಗಳು ಇಪ್ಪತ್ತುಮಂದಿ. ಬ್ರಹ್ಮ, ವಾಯು, ಗರುಡ, ಶೇಷ, ರುದ್ರ, ಇಂದ್ರ, ಕಾಮ, ಅಹಂಪ್ರಾಣ, ಅನಿರುದ್ಧ, ಸ್ವಾಯಂಭುವಮನು, ಬೃಹಸ್ಪತಿ, ದಕ್ಷಪ್ರಜಾಪತಿ, ಪ್ರವಹವಾಯು, ಚಂದ್ರ, ಸೂರ್ಯ, ಯಮಧರ್ಮ, ವರುಣ, ವಹ್ನಿ, ಮಿತ್ರ ಮತ್ತು ನಿರ್ ಋತಿ. ಗಣಪತಿ ಇಪ್ಪತ್ತೊಂದನೆಯವನು.

ಇನ್ನು ಶಿವ ಪಾರ್ವತಿಯರು. ಇವರು ದಂಪತಿಗಳು. ಇಲ್ಲಿ ಶಿವ ಮನಸ್ಸಿನ ಅಭಿಮಾನಿ ಮತ್ತು ಪಾರ್ವತಿ ವಾಕ್ ದೇವತೆ. ಮನಸ್ಸು ಯೋಚಿಸಿದಂತೆ ಮಾತು. ಅದಕ್ಕಾಗಿ ಅವರದು ಅನ್ಯೋನ್ಯ ದಾಂಪತ್ಯ. ಶಬ್ದದ ಮೂಲ ಶಕ್ತಿ ಗಾಳಿ ಮತ್ತು ಆಕಾಶ. ಆಕಾಶ ಮತ್ತು ಗಾಳಿ ಇಲ್ಲದಿದ್ದರೆ ಶಬ್ದವಿಲ್ಲ. ನಮ್ಮ ಒಳಗಿನ ವಾಕ್ ನಾದವೇ ಪಾರ್ವತಿ- ಅದು ಶಬ್ದ ರೂಪದಲ್ಲಿ ಹೊರ ಹೊಮ್ಮುವುದೇ ಮಾತು. ಇದು ಮೂಲ ನಾದದ ಸ್ಥೂಲ ರೂಪ. ಮನುಷ್ಯನಿಗೆ ದೊಡ್ಡ ಆಪತ್ತು ಮಾತು. ಅದ್ಯಾತ್ಮ ಸಾಧನೆಗೆ ಬೇಕಾಗಿರುವುದು ಮಾತಿಗಿಂತ ಹೆಚ್ಚಾಗಿ ಮೌನ. ತನ್ನತನದ ಅರಿವಿಲ್ಲದೇ(Awareness of self), ಅಹಂಕಾರ ತತ್ವದ ವಿರುದ್ಧ ಮಾತು ಬೆಳೆದಾಗ, ಮಾತಿನ ಶಿರಛೇದನವಾಗದೇ ಜ್ಞಾನವಿಲ್ಲ. ಶಿರಛೇದನವಾದ ಮೇಲೆ ಪುನಃ ಅದೇ ಮಾತು ಮುಂದುವರಿಯಬಾರದು. ಅದಕ್ಕಾಗಿ ಎಲ್ಲವನ್ನು ಕೇಳುವ ದೊಡ್ಡ ಕಿವಿಯುಳ್ಳ, ಪ್ರಾಣಶಕ್ತಿಯನ್ನು ನಿಯಂತ್ರಿಸುವ ಉದ್ದನೆಯ ಮೂಗಿನ ಸಾಂಕೇತ ರೂಪವಾದ ಆನೆಯ ತಲೆಯನ್ನು ಇಟ್ಟು ಗಣಪತಿ ಎನ್ನುವ ಹೊಸ ಆಕಾರದ ಜನನವಾಯಿತು. ಗಣಪತಿಯನ್ನು ನೋಡಿದಾಕ್ಷಣ ನಮಗೆ ನೆನಪಿಗೆ ಬರಬೇಕಾದ ವಿಷಯ ಮಾತಿಗಿಂತ ಮನನ ಹೆಚ್ಚು ಮಾಡು, ಸರಿಯಾಗಿ ಕೇಳಿಸಿಕೋ (Be a good listener) ಎನ್ನುವ ವಿಚಾರ. ಇನ್ನು ಉತ್ತರ ದಿಕ್ಕಿಗೆ ತಲೆ ಹಾಕುವುದು ಅಂದರೆ ಏನು? ಸಾಮಾನ್ಯವಾಗಿ ನಮಗೆಲ್ಲರಿಗೂ ಗೊತ್ತಿರುವಂತೆ ಉತ್ತರಕ್ಕೆ ತಲೆ ಹಾಕಿ ಮಲಗಬಾರದು. ದಕ್ಷಿಣಕ್ಕೆ ಮುಖ ಮಾಡಿ ಪೂಜೆಗೆ ಕುಳಿತು ಕೊಳ್ಳಬಾರದು. ದೇವಸ್ಥಾನದಲ್ಲಿ ಅಪ್ರದಕ್ಷಿಣೆ ಸುತ್ತಬಾರದು ಇತ್ಯಾದಿ. ಆದರೆ ಈ ಎಲ್ಲಾ ವಿಚಾರ ಏಕೆ? ಇದರ ಹಿಂದಿರುವ ಸಿದ್ಧಾಂತ ಏನು? ಈ ಭೂಮಿಯಲ್ಲಿ ಉತ್ತರ ಧ್ರುವದ ಶಕ್ತಿ

ಉತ್ತರದಿಂದ ಪೂರ್ವಕ್ಕೆ ಹರಿಯುತ್ತಿರುತ್ತದೆ ಹಾಗೂ ದಕ್ಷಿಣ ಧ್ರುವದ ಶಕ್ತಿ ದಕ್ಷಿಣದಿಂದ ಪಶ್ಚಿಮಕ್ಕೆ ಹರಿಯುತ್ತಿರುತ್ತದೆ. ನಮ್ಮ ಚಲನೆ ಕೂಡಾ ಈ ಶಕ್ತಿಪಾತಕ್ಕೆ ಅನುಗುಣವಾಗಿರಬೇಕು. ನಾವು ದಕ್ಷಿಣಕ್ಕೆ ಮುಖ ಮಾಡಿದರೆ ದಕ್ಷಿಣ ಧ್ರುವದ ಶಕ್ತಿಪಾತಕ್ಕೆ ನಮ್ಮನ್ನು ನಾವು ಒಡ್ಡಿಕೊಂಡಂತೆ ಹಾಗೂ ಉತ್ತರಕ್ಕೆ ಮುಖ ಮಾಡಿದರೆ ಉತ್ತರ ಧ್ರುವದ ಶಕ್ತಿಪಾತಕ್ಕೆ ಒಡ್ಡಿಕೊಂಡಂತೆ. ಉತ್ತರಕ್ಕೆ ತಲೆ ಹಾಕಿ ಮಲಗುವುದು ಎಂದರೆ ಎದ್ದಾಗ ದಕ್ಷಿಣಕ್ಕೆ ಮುಖ ಮಾಡುವುದು. ಆದ್ದರಿಂದ ದಕ್ಷಿಣ ಮುಖ ಹಾಗೂ ಉತ್ತರ ತಲೆ ಎರಡೂ ಒಂದೆ. ಈ ಎರಡು ಶಕ್ತಿಪಾತದಲ್ಲಿ ಒಂದು ದೊಡ್ಡ ವ್ಯತ್ಯಾಸವಿದೆ. ಅದೇನೆಂದರೆ ಉತ್ತರದ ಶಕ್ತಿಪಾತ ಊರ್ಧ್ವಮುಖವಾದದ್ದು ಹಾಗೂ ದಕ್ಷಿಣದ ಶಕ್ತಿಪಾತ ಸಂಸಾರದ ಸುಳಿಯಲ್ಲಿ ಸಿಲುಕಿಸುವಂತಾದ್ದು. ಈ ಕಾರಣಕ್ಕಾಗಿ ಉತ್ತರಕ್ಕೆ ತಲೆ ಹಾಕಿ ಮಲಗಿದರೆ ಅಥವಾ ದಕ್ಷಿಣಕ್ಕೆ ಮುಖ ಮಾಡಿ ಪೂಜೆಗೆ ಕುಳಿತರೆ ನಮ್ಮ ಶಿರಭೇದನವಾಗುತ್ತದೆ. ನಾವು ಪುನಃ ಈ ಸಂಸಾರದ ಸುಳಿಯಲ್ಲಿ ಸುತ್ತಬೇಕಾಗುತ್ತದೆ. ಇನ್ನು ಹೊಟ್ಟೆಗೆ ಹಾವಿನ ಸುತ್ತು. ಹಾವು ಕುಂಡಲಿನಿ ಶಕ್ತಿಯ ಸಂಕೇತ. ಇದು ಚಕ್ರಾಕಾರವಾಗಿ ತಲೆ ಕೆಳಗೆ ಹಾಕಿ ಮಲಗಿದ ಹಾವಿನ ರೂಪದಲ್ಲಿ ನಮ್ಮ ಮಲ-ಮೂತ್ರ ದ್ವಾರದ ಮಧ್ಯದಲ್ಲಿರುತ್ತದೆ. ಕುಂಡಲಿನಿ ಜಾಗೃತವಾಗುವುದು ಎಂದರೆ ಈ ಹಾವು ಹೆಡೆಯೆತ್ತಿ ನಿಲ್ಲುವುದು. ಕುಂಡಲಿನಿ ಜಾಗೃತವಾದಾಗ ಶಕ್ತಿ- ಮೂಲಾಧಾರ, ಮಣಿಪುರ ಹಾಗೂ ಸ್ವಾದಿಷ್ಠಾನ ಶಕ್ತಿ ಕೇಂದ್ರಗಳಲ್ಲಿ ಊರ್ಧ್ವ ಮುಖವಾಗಿ ಸಂಚರಿಸುತ್ತದೆ. ನಮ್ಮ ಹೊಕ್ಕುಳಿನ ಮೇಲಿನ ಶಕ್ತಿ ಕೇಂದ್ರ ಜ್ಞಾನದ ಬಾಗಿಲು, ಗಣಪತಿ ಈ ಮೂರು ಶಕ್ತಿ ಕೇಂದ್ರಗಳನ್ನು ನಿಯಂತ್ರಿಸಿ ನಮಗೆ ಜ್ಞಾನದ ಬಾಗಿಲನ್ನು ತೆರೆಯುವ ಶಕ್ತಿದೇವತೆ. ಇಷ್ಟೊಂದು ಸಂಗತಿ ಈ ಪುಟ್ಟ ಕಥೆಯಲ್ಲಿದೆ. ಇದು ಹೂವಿನಿಂದ ಹಣ್ಣಿಗೆ ಹೋಗುವ ರೀತಿ. ಕೇವಲ ಮೇಲ್ನೋಟದ ಅರ್ಥದಲ್ಲೇ ನಿಂತರೆ ತೊಂದರೆಯಿಲ್ಲ, ಅದರಿಂದಾಚೆಗೆ ಏನೂ ಇಲ್ಲ ಎಂದು ತಿಳಿದರೆ ಅದು ಅನರ್ಥ.

ನಾವು ನಮ್ಮ ತಲೆಯಲ್ಲಿದ್ದುದನ್ನು ವೇದದಲ್ಲಿ ಕಾಣದೆ, ವೇದದಲ್ಲಿದ್ದುದನ್ನು ತಲೆಯೊಳಗೆ ತುಂಬಿಕೊಳ್ಳಬೇಕು. ವೇದವನ್ನು ಮೇಲ್ನೋಟದಲ್ಲಿ ಕಂಡಾಗ ಕೇವಲ ಜನ್ಮ-ಕರ್ಮ, ಹುಟ್ಟು-ಸಾವು, ಈ ಸುಳಿಯಲ್ಲೇ ಇರುತ್ತೇವೆ, ಎಂದೂ ಅಮರತ್ವದ ದಾರಿ ಕಾಣದು. ಮೇಲ್ನೋಟಕ್ಕೆ ವೇದವನ್ನು ಕಾಣುವವರು ಬೆಳಗಿನಿಂದ ಸಂಜೆಯ ತನಕ ಭೋಗ ಐಶ್ವರ್ಯ ಕರ್ಮ ಕಲಾಪದಲ್ಲಿ ನಿಂತು ಆತ್ಮಸಾಕ್ಷಾತ್ಕಾರವನ್ನು ಮರೆತು ನಿಲ್ಲುತ್ತಾರೆ. ಇದು ದೊಡ್ಡ ದುರಂತ.

ಈಗ ನಮಗೆ ಒಂದು ಪ್ರಶ್ನೆ ಕಾಡುತ್ತದೆ. ಅದೇನೆಂದರೆ ಪ್ರಾಚೀನ ಅಧ್ಯಾತ್ಮ ಗ್ರಂಥಗಳನ್ನು ಏಕೆ ಒಗಟಿನ ರೂಪದಲ್ಲಿ ಬರೆದಿದ್ದಾರೆ? ಎಂದು. ತರಗತಿಗೊಂದು ಪಠ್ಯಪುಸ್ತಕವಿರುವಂತೆ ಈ ಗ್ರಂಥಗಳನ್ನು ಹಂತಹಂತವಾಗಿ ಅರ್ಥವಾಗುವ ರೀತಿ ಏಕೆ ಬರೆದಿಲ್ಲ? ಇತ್ಯಾದಿ. ಇಲ್ಲಿ ನಾವು ತಿಳಿದುಕೊಳ್ಳಬೇಕಾದ ಮುಖ್ಯ ವಿಷಯ ಏನೆಂದರೆ ಈ ಗ್ರಂಥಗಳನ್ನು ತಿಳಿದುಕೊಳ್ಳಲು ಯೋಗ್ಯತೆ ಬೇಕು. ಇಲ್ಲಿ ಪುಸ್ತಕ ಒಂದೇ; ಆದರೆ ಒಂದೇ ಪುಸ್ತಕದಲ್ಲಿ ಅನೇಕ ಹಂತದ ಶಿಕ್ಷಣ ಅಡಗಿದೆ. ಈ ವೇದ ಗ್ರಂಥಗಳು ಎಂದೂ ಅಯೋಗ್ಯರಿಗೆ ದಕ್ಕದು. ಅವು ಕೇವಲ ತನ್ನನ್ನು ಅರಿಯಬಲ್ಲ, ಅರಿತು ಅದರ ಸದುಪಯೋಗ ಮಾಡಬಲ್ಲವನ ಮುಂದೆ ಮಾತ್ರ ತೆರೆದುಕೊಳ್ಳುತ್ತವೆ. ಯೋಗ್ಯನಾದವನು ಈ ಗ್ರಂಥದ ಆಳಕ್ಕಿಳಿದಷ್ಟೂ ಹೆಚ್ಚು ಹೆಚ್ಚು ವಿಷಯ ತಿಳಿಯುತ್ತಾನೆ. ಒಂದು ಗ್ರಂಥವನ್ನು ಅರಿಯಲು ಅನೇಕ ಜನ್ಮಗಳ ಸಾಧನೆ ಬೇಕು.

ತ್ರೈಗುಣ್ಯವಿಷಯಾ ವೇದಾ ನಿಸ್ತ್ರೈಗುಣ್ಯೋ ಭವಾರ್ಜುನ ।

ನಿರ್ದ್ವಂದ್ವೋ ನಿತ್ಯಸತ್ತ್ವಸ್ಥೋ ನಿರ್ಯೋಗಕ್ಷೇಮ ಆತ್ಮವಾನ್ ॥೪೫॥

ತ್ರೈಗುಣ್ಯ ವಿಷಯಾಃ ವೇದಾಃ ನಿಸ್ತ್ರೈಗುಣ್ಯಃ ಭವ ಅರ್ಜುನ |
ನಿರ್ದ್ವಂದ್ವಃ ನಿತ್ಯಸತ್ತ್ವಸ್ಥಃ ನಿರ್ಯೋಗಕ್ಷೇಮಃ ಆತ್ಮವಾನ್ -- ವೇದಗಳು ಹೊರನೋಟಕ್ಕೆ ತ್ರಿಗುಣಗಳ ನಂಟನ್ನೇ ನಿರೂಪಿಸುತ್ತವೆ [ಒಳಗಿನಿಂದ ತ್ರಿಗುಣಗಳ ನಂಟಿನ ನಂಜನ್ನು ನಿವಾರಿಸುತ್ತವೆ]. ಓ ಅರ್ಜುನಾ, ನೀನು ತ್ರಿಗುಣಗಳ ನಂಟನ್ನು ನೀಗಿ ನಿಲ್ಲು. ದ್ವಂದ್ವಗಳ ತಾಕಲಾಟ ತೊಡೆದು ಸದಾ ಭಗವಂತನಲ್ಲಿ ಬಗೆಯನ್ನಿಡು. ಯೋಗ-ಕ್ಷೇಮದ ಹೊಣೆಯನ್ನು ಅವನಿಗೊಪ್ಪಿಸಿ ಅವನೇ ಸ್ವಾಮಿ ಎಂದು ನಂಬಿ ನಡೆ.

ಈವರೆಗೆ ನಾವು ವೇದವನ್ನು ಹೇಗೆ ಅನುಸಂಧಾನ ಮಾಡಬೇಕು, ಅದರ ಮೇಲ್ನೋಟದ ಅರ್ಥದಿಂದ ಆಳಕ್ಕೆ ಹೇಗೆ ಇಳಿಯಬೇಕು ಎನ್ನುವುದನ್ನು ಕೃಷ್ಣ ಅರ್ಜುನನಿಗೆ ಹೇಳಿದ್ದನ್ನು ನೋಡಿದೆವು. ಇನ್ನಷ್ಟು ಸ್ಪಷ್ಟವಾಗಿ , ಅದು ಹೇಗೆ ಕಾಣುತ್ತದೆ ಹಾಗೂ ಅದನ್ನು ಹೇಗೆ ನೋಡಬೇಕು ಎನ್ನುವುದನ್ನು ಈ ಶ್ಲೋಕದಲ್ಲಿ ಕೃಷ್ಣ ಸ್ಪಷ್ಟವಾಗಿ ವಿವರಿಸುತ್ತಾನೆ. ಇದು ಒಂದು ರೀತಿಯಲ್ಲಿ ಇಡೀ ಅಧ್ಯಾತ್ಮದ ಅನುಸಂಧಾನದ ಪ್ರಮುಖವಾದ ವಿಚಾರ. ಇಲ್ಲಿ ಕೃಷ್ಣ ಅದನ್ನು ಹೇಗೆ ಅನುಸಂಧಾನ ಮಾಡಬೇಕು, ಹಾಗೂ ನಮ್ಮ ಮನಸ್ಸನ್ನು ಹೇಗೆ ಅಣಿಗೊಳಿಸಬೇಕು ಎನ್ನುವುದನ್ನು ವಿವರಿಸಿದ್ದಾನೆ.
ನಮಗೆ ಮೇಲ್ನೋಟಕ್ಕೆ ವೇದ ಸತ್ವ-ರಜಸ್ಸು-ತಮೋಗುಣಗಳಿಗೆ(ತ್ರೈಗುಣ್ಯ) ಸಂಬಂಧಪಟ್ಟ ಪ್ರಾಪಂಚಿಕ ವಿಷಯ, ಹಾಗೂ ಕೇವಲ ಪ್ರಾಪಂಚಿಕ ಅರ್ಥವನ್ನೇ ಹೇಳುವಂತೆ ಕಾಣುತ್ತದೆ-ಕೆಂಪು ಕನ್ನಡಕ ಧರಿಸಿದವನಿಗೆ ಪ್ರಪಂಚವೆಲ್ಲಾ ಕೆಂಪಾಗಿ ಕಾಣುವಂತೆ. ಉದಾಹರಣೆಗೆ: ಸಂತಾನ ವೃದ್ಧಿ, ಹಟ್ಟಿ ತುಂಬಾ ಹಸು, ಕೈತುಂಬಾ ದುಡ್ಡು, ಮನೆತುಂಬಾ ಮಕ್ಕಳು, ರಾಜಸೂಯ, ಅಶ್ವಮೇಧ, ಪುರುಷಮೇಧ ಇತ್ಯಾದಿ. ಇವು ವೇದದಲ್ಲಿ ಮೇಲ್ನೋಟಕ್ಕೆ ಕಾಣುವವು. ಇವೆಲ್ಲವೂ ತೀರಾ ಪ್ರಾಪಂಚಿಕ ವಿಷಯಗಳು. ಇದರಿಂದಾಗಿ ವೇದ ನಮ್ಮನ್ನು ಅಧ್ಯಾತ್ಮದ ಆಳಕ್ಕೆ ಕೊಂಡೊಯ್ಯುವುದಿಲ್ಲ ಎನ್ನುವಂತೆ ಭಾಸವಾಗುತ್ತದೆ. ಆದರೆ ನಾವು ವೇದವನ್ನು ಅರ್ಥ ಮಾಡಿಕೊಳ್ಳಬೇಕಾದರೆ ಮೊದಲು ಪ್ರಾಪಂಚಿಕ ಪ್ರಭಾವವನ್ನು ದಾಟಿ ನಿಲ್ಲಬೇಕು. ಪ್ರಾಪಂಚಿಕ ಪ್ರಭಾವ ಕೆಂಪು ಕನ್ನಡಕದಂತೆ. ಅದರ ಪ್ರಭಾವದಲ್ಲಿ ವೇದವನ್ನು ಕಂಡರೆ ನಮಗೆ ಕಾಣುವುದು ಕೇವಲ ಪ್ರಾಪಂಚಿಕ ವಿಷಯ ಮಾತ್ರ. ಅದಕ್ಕಾಗಿ ನಾವು ತ್ರೈಗುಣ್ಯವರ್ಜಿತರಾಗಬೇಕು. ಈ ತ್ರೈಗುಣ್ಯದ ಪ್ರಭಾವವನ್ನು ದಾಟಿ ನಮ್ಮ ನಿಜವಾದ ಸ್ವಭಾವ ಏನು ಎನ್ನುವುದನ್ನು ಗುರುತಿಸಿಕೊಂಡಾಗ ಶುದ್ಧ ಚಿಂತನೆ ಸಾಧ್ಯ. ತ್ರಿಗುಣದ ಬೇಲಿಯನ್ನು ದಾಟದೇ ಸತ್ಯ ತಿಳಿಯುವುದಿಲ್ಲ. ತ್ರಿಗುಣದ ಪ್ರಭಾವದಿಂದ ಪೂರ್ಣ ಆಚೆಗೆ ನಿಲ್ಲುವುದು ಅಸಾಧ್ಯ. ಆದರೆ ಈ ವಿಷಯ ಗೊತ್ತಿದ್ದು ಅದರ ಎಚ್ಚರ ಇದ್ದರೆ ನಾವು ಸಾಧನೆ ಮಾಡಲು ಸಾಧ್ಯ. ನಾವು ಎಷ್ಟು ಅಪವಿತ್ರರಾಗಿರಲೀ, ಬಾಯಿಯಲ್ಲಿ ಭಗವಂತನ ನಾಮ ಸ್ಮರಣೆ, ನಮ್ಮೊಳಗೆ ಭಗವಂತನಿದ್ದಾನೆ ಎನ್ನುವ ಎಚ್ಚರ ನಮ್ಮನ್ನು ಶುದ್ಧವಾಗಿಸುತ್ತದೆ.
ಧ್ಯಾನ ಮಾಡುವಾಗ ನಮ್ಮ ಮನಸ್ಸು ಹೊರ ಪ್ರಪಂಚದತ್ತ ಸುಳಿಯದಂತೆ ನೋಡಿಕೊಳ್ಳಬೇಕು. ಆತ್ಮಜ್ಞಾನವಿಲ್ಲದೆ ಹೋಮ ಹವನ ಮಾಡಿ ಉಪಯೋಗವಿಲ್ಲ. ನಮಗೆ ಆಶ್ರಯವಾಗಿರುವ ಆತ್ಮತತ್ವ ಭಗವಂತನ ಅರಿವಿನಿಂದ-ನಿಸ್ವಾರ್ಥವಾಗಿ ಸಾಧನೆ ಮಾಡಬೇಕು. ಎಂದೂ ಕಪಟ ವಂಚನೆ ಇಲ್ಲದ ಧರ್ಮವನ್ನು

ಆಚರಿಸಬೇಕು. ನಮ್ಮ ಮನಸ್ಸನ್ನು ಶುದ್ಧ ಭಾವ ಚಿಂತನೆಗೆ ಅಣಿಗೊಳಿಸಬೇಕು. ನಮ್ಮ ಸ್ವಾರ್ಥದತ್ತ ನೋಡದೇ, ತ್ರಿಗುಣಗಳನ್ನು ದಾಟಿ ನಿಂತರೆ ಮಾತ್ರ ನಮಗೆ ವೇದದ ನಿಜ ಸಂದೇಶ ತಿಳಿಯುತ್ತದೆ. ಈ ಸ್ಥಿತಿಯಲ್ಲಿ ವೇದ ಓದಿದರೆ ಅದು ಕೇವಲ ಲೌಕಿಕ ವಿಷಯವಲ್ಲ ಎನ್ನುವುದು ಅರ್ಥವಾಗುತ್ತದೆ. ನಾವು ಮಾಡುವ ಪ್ರತಿಯೊಂದು ಕರ್ಮವನ್ನು, ಪೂಜೆ ಪುನಸ್ಕಾರವನ್ನು, ನಿಸ್ವಾರ್ಥವಾಗಿ ಭಗವಂತನ ಆರಾಧನೆ ಎಂದು ಮಾಡಬೇಕು. ನಮಗೇನು ಬೇಕು ಅನ್ನುವುದು ನಮಗೆ ಗೊತ್ತಿಲ್ಲ; ನಮಗೆ ಅಗತ್ಯವಾದದ್ದನ್ನು ಭಗವಂತ ಕೊಟ್ಟೇ ಕೊಡುತ್ತಾನೆ; ಎಂದು ನಮ್ಮ ಭವಿಷ್ಯದ ಚಿಂತೆಯನ್ನು ಭಗವಂತನಿಗೊಪ್ಪಿಸಿ ಮುನ್ನಡೆದರೆ ಜ್ಞಾನ ಸಿದ್ಧಿಯಾಗುತ್ತದೆ.

ಇಲ್ಲದ್ದನ್ನು ಪಡೆಯುವುದು ಯೋಗ, ಪಡೆದದ್ದನ್ನು ಉಳಿಸಿಕೊಳ್ಳುವುದು ಕ್ಷೇಮ. ಲೌಕಿಕವಾದ ಯೋಗ ಕ್ಷೇಮದಲ್ಲೇ ನಮ್ಮ ಇಡೀ ಜೀವನ ಕಳೆದು ಹೋಗುತ್ತದೆ. ಇದನ್ನು ಬಿಟ್ಟು ಭಗವಂತ ನಮಗೆ ಏನು ಕೊಟ್ಟಿದ್ದಾನೋ ಅದರಲ್ಲಿ ಸಂತೋಷವಾಗಿರಲು ಕಲಿಯಬೇಕು. 'ನಿರ್ಯೋಗಕ್ಷೇಮದ' ಸ್ಥಿತಿಯಲ್ಲಿ ಮಾತ್ರ ಸತ್ಯದ ಸಾಕ್ಷಾತ್ಕಾರವಾಗುತ್ತದೆ. ನಮ್ಮ ಯೋಗಕ್ಷೇಮದ ಹೊಣೆ ಆ ಭಗವಂತನದ್ದು. ಎಲ್ಲರೊಳಗೆ ಅಂತರ್ಯಾಮಿಯಾಗಿರುವ ಭಗವಂತ ಎಂದೆಂದೂ ನಮ್ಮನ್ನು ರಕ್ಷಿಸುತ್ತಾನೆ ಎನ್ನುವ ಭರವಸೆಯಿಂದ, ಭಗವಂತನ ಚಿಂತನೆಗೆ ತೊಡಗಬೇಕು. ಇದು ಅಧ್ಯಾತ್ಮ ಸಾಧನೆಗೆ ಬೇಕಾದ ಮಾನಸಿಕ ತಯಾರಿ. ಇಂತಹ ಮನಃಸ್ಥಿತಿಯಲ್ಲಿ ಯಾವ ಗ್ರಂಥ ಓದಿದರೂ ಅದು ಭಗವಂತನ ಸ್ತುತಿಯಾಗುತ್ತದೆ. ಈ ಮನಃಸ್ಥಿತಿ ತಲುಪದೇ ವೇದಾಂತ ನಮಗೆ ಅರ್ಥವಾಗುವುದಿಲ್ಲ.

ಅಧ್ಯಾತ್ಮ ಮಾರ್ಗದಲ್ಲಿ ಸಾಗುವ ವ್ಯಕ್ತಿಯ ಸಾಧನೆ ಏನಿರಬೇಕು, ಅಂತರಂಗದ ಅನುಷ್ಠಾನ ಹೇಗಿರಬೇಕು, ಎನ್ನುವುದನ್ನು ಸ್ಪಷ್ಟಪಡಿಸಿದ ಕೃಷ್ಣನ ಮಾತಿನಿಂದ ನಮಗೆ ಒಂದು ಪ್ರಶ್ನೆ ಮೂಡಬಹುದು. ಕೃಷ್ಣ ಕರ್ಮ ಮತ್ತು ಜ್ಞಾನಗಳಲ್ಲಿ- ಜ್ಞಾನಕ್ಕೆ ಒತ್ತುಕೊಟ್ಟು ಸಾಗಬೇಕು, ನಮ್ಮ ಯಾವುದೇ ಕ್ರಿಯೆಯ ಅನುಸಂಧಾನ ಜ್ಞಾನದ ಕಡೆಗೆ ಪೂರಕವಾಗಿರಬೇಕು ಎನ್ನುತ್ತಾನೆ. "ಏಕೆ ಜ್ಞಾನ ಸಾಧನೆಗೆ ಇಷ್ಟೊಂದು ಮಹತ್ವ? ಕರ್ಮಯೋಗದಿಂದ ಸ್ವರ್ಗವನ್ನು ಪಡೆಯಬಹುದಲ್ಲ? ಎನ್ನುವ ಪ್ರಶ್ನೆ. ಈ ಪ್ರಶ್ನೆಗೆ ಕೃಷ್ಣ ಇಲ್ಲಿ ಉತ್ತರಿಸುತ್ತಾನೆ. ಹಿಂದೆ ವೇದವನ್ನು ಜ್ಞಾನಕಾಂಡ, ಕರ್ಮಕಾಂಡ ಮತ್ತು ಉಪಾಸನಕಾಂಡ ಎಂದು ಮೂರು ವಿಭಾಗ ಮಾಡಿದ ಪರಂಪರೆ ಇತ್ತು. ಆದರೆ ಕೃಷ್ಣ ಹೇಳುತ್ತಾನೆ, ವೇದಕ್ಕೆ ಇರುವುದು ಒಂದೇ ಮುಖ ಎಂದು. ವೇದದಲ್ಲಿ ಹೇಳುವ ಕರ್ಮ, ಉಪಾಸನೆ, ಎಲ್ಲವುದರ ಹಿಂದೆ ಜ್ಞಾನವಡಗಿದೆ. ಎಲ್ಲವೂ ಜ್ಞಾನಕ್ಕೋಸ್ಕರ. ಆದ್ದರಿಂದ ಇಡೀ ವೇದವೇ ಜ್ಞಾನಕಾಂಡ ಎಂದು ಮುಂದಿನ ಶ್ಲೋಕದಲ್ಲಿ ಕೃಷ್ಣ ಒತ್ತಿ ಹೇಳುತ್ತಾನೆ.

ಯಾವಾನರ್ಥ ಉದಪಾನೇ ಸರ್ವತಃ ಸಂಪ್ಲುತೋದಕೇ ।
ತಾವಾನ್ ಸರ್ವೇಷು ವೇದೇಷು ಬ್ರಾಹ್ಮಣಸ್ಯ ವಿಜಾನತಃ ॥೪೬॥

ಯಾವಾನ್ ಅರ್ಥಃ ಉದಪಾನೇ ಸರ್ವತಃ ಸಂಪ್ಲುತ ಉದಕೇ |
ತಾವಾನ್ ಸರ್ವೇಷು ವೇದೇಷು ಬ್ರಾಹ್ಮಣಸ್ಯ ವಿಜಾನತಃ -- ಬಾವಿಯಿಂದ ಏನೇನು ಉಪಯೋಗವಿದೆಯೋ ಅದೆಲ್ಲವೂ ತುಂಬಿ ಹರಿಯುವ ನೀರ ನೆಲೆಯಲ್ಲಿ ಒಳಗೊಂಡಿದೆ. ಎಲ್ಲಾ ವೇದಗಳಲ್ಲಿ ಏನು ಫಲವೋ ಅದು ಬ್ರಹ್ಮವನ್ನು ಬಲ್ಲ ವಿಜ್ಞಾನಿಯ ಫಲದಲ್ಲಿ ಒಳಗೊಂಡಿದೆ.[ಪ್ರಕೃತಿಯೇ ನೀರಂತೆ ಎಲ್ಲೆಡೆ ತುಂಬಿ ಹರಿಯುವ

ಪ್ರಳಯದಲ್ಲಿ ಕೂಡಾ ತುಂಬಿದ ಕೊಡವಾಗಿ, ಇನ್ನೊಬ್ಬರ ಕಾಪಿಗೊಳಪಡದೇ, ಕಾಲಾದಿಗಳನ್ನು ನಿಯಮಿಸುವ ಭಗವಂತನಿಂದ ಎನಿತು ಲಭ್ಯವೋ -ಅದು ಎಲ್ಲಾ ವೇದಗಳನ್ನು ಬಲ್ಲ ಹಿರಿಯ ಜ್ಞಾನಿಗೆ ಮಾತ್ರ ಸುಲಭ]

ಈ ಶ್ಲೋಕ ಒಗಟಿನಂತಿದೆ. ನೇರವಾಗಿ ನೋಡಿದರೆ ಅರ್ಥ ತಿಳಿಯದ ಶ್ಲೋಕವಿದು.ಈ ಶ್ಲೋಕವನ್ನು ಅರ್ಥ ಮಾಡಿಕೊಳ್ಳಬೇಕಾದರೆ ನಾವು ಶ್ಲೋಕದಲ್ಲಿ ಮುಳುಗಬೇಕು. ಆಗ ಆಳದಲ್ಲಿನ ಮುತ್ತು ರತ್ನಗಳು ನಮಗೆ ಸಿಗುತ್ತವೆ. ನಾವು ನಮ್ಮ ಅಹಂಕಾರವನ್ನು ಸಂಪೂರ್ಣ ತೊರೆದು ಶರಣಾಗತಿಯಿಂದ(Total Submission) ನೋಡಿದಾಗ ಅದು ತನ್ನನ್ನು ತೆರೆದುಕೊಳ್ಳುತ್ತದೆ. ಈ ಶ್ಲೋಕವನ್ನು ಸ್ವಲ್ಪ ಬಿಡಿಸಿ ಹೀಗೆ ಹೇಳಬಹುದು:

ಯಾವಾನ್ ಅರ್ಥ ಉದಪಾನೇ ಯಾವಾನ್ ಅರ್ಥ ಸರ್ವತಃ ಸಂಪ್ಲುತೋದಕೇ
ತಾವಾನ್ ಸರ್ವೇಷು ವೇದೇಷು ತಾವಾನ್ ಬ್ರಾಹ್ಮಣಸ್ಯ ವಿಜಾನತಃ

ಒಂದು ಬಾವಿ ತೋಡಿ ಅದರಲ್ಲಿ ಬರುವ ನೀರಿನಿಂದ ಏನು ಪ್ರಯೋಜನವೋ, ಆ ಎಲ್ಲಾ ಪ್ರಯೋಜನಗಳ ಜೊತೆಗೆ ಇನ್ನೂ ಅನೇಕಾನೇಕ ಪ್ರಯೋಜನಗಳನ್ನು ತುಂಬಿ ಹರಿಯುವ ನೀರಿನ ನೆಲೆ ಕೊಡಬಲ್ಲದು. ಜ್ಞಾನವಿಲ್ಲದೆ ಕರ್ಮ ಕಾಂಡವನ್ನು ಮಾಡುವವನ ಸ್ಥಿತಿ ಮನೆಯಲ್ಲಿ ಕಷ್ಟಪಟ್ಟು ಬಾವಿ ತೋಡಿ ಅದರಿಂದ ನೀರು ಸೇದಿದಂತೆ. ಭಗವಂತನನ್ನು ಸಾಕ್ಷಾತ್ಕಾರಗೊಳಿಸಿಕೊಂಡವನ ಸ್ಥಿತಿ ತುಂಬಿ ಹರಿಯುವ ನೀರಿನ ನೆಲೆಯ ದಡದಲ್ಲಿದ್ದಂತೆ. ಅಪರೋಕ್ಷ ಜ್ಞಾನಿ ಎಲ್ಲವುದರಲ್ಲೂ ಭಗವಂತನನ್ನು ಕಾಣುತ್ತಾನೆ. ಬ್ರಹ್ಮಜ್ಞಾನಿ ಸದಾ ನಿರ್ಮಲವಾಗಿ ತುಂಬಿ ಹರಿಯುವ ನೀರಿನ ನೆಲೆಯ ಪಕ್ಕ ನಿಂತವನಂತೆ. ಇಡೀ ವೇದವನ್ನು ಓದಿ ಕರ್ಮದಲ್ಲೇ ಕುಳಿತವನು ಬೆವರು ಸುರಿಸಿ ಬಾವಿಯಿಂದ ನೀರು ಸೇದುವವನಂತೆ.

ಈ ಶ್ಲೋಕದಲ್ಲಿ 'ಬ್ರಾಹ್ಮಣ' ಎನ್ನುವ ಪದ ಬಂದಿದೆ. ಇದನ್ನು 'ಜಾತಿ' ಎಂದು ಪರಿಗಣಿಸಿದರೆ ಈ ಶ್ಲೋಕದ ನಿಜ ಸಂದೇಶ ತಿಳಿಯುವುದಿಲ್ಲ. ವೇದ ಗ್ರಂಥಗಳಲ್ಲಿ ಎಲ್ಲೂ ಜಾತಿಯ ಬಗ್ಗೆ ಪ್ರಸ್ತಾಪವಿಲ್ಲ. ಬ್ರಾಹ್ಮಣ ಅಂದರೆ 'ಬ್ರಹ್ಮ ಅಣತೀತಿ'; ಅಂದರೆ ಬ್ರಹ್ಮ ತತ್ವವನ್ನು ಅರ್ಥ ಮಾಡಿಕೊಂಡವ ಎಂದರ್ಥ. 'ಬ್ರಹ್ಮ' ಎಂದರೆ ಎಲ್ಲಕ್ಕಿಂತ ದೊಡ್ಡದಾದದ್ದು. ಎಲ್ಲಕ್ಕಿಂತ ದೊಡ್ಡದು ವೇದ ಮತ್ತು ವೇದವೇದ್ಯನಾದ ಭಗವಂತ. ಆದ್ದರಿಂದ ವೇದವನ್ನು ಅರಿತವನು, ವೇದವೇದ್ಯ ಭಗವಂತನನ್ನು ಸಾಕ್ಷಾತ್ಕರಿಸಿಕೊಂಡವನು ಬ್ರಾಹ್ಮಣ.

ಬ್ರಹ್ಮನನ್ನು ಅಪರೋಕ್ಷವಾಗಿ ತಿಳಿದ ಜ್ಞಾನಿಗೆ ತುಂಬಿ ಹರಿವ ನೀರಿನ ಫಲವಾದರೆ, ಕರ್ಮಕನಿಗೆ ಬಾವಿಯ ಫಲ. ಶಾಸ್ತ್ರದಿಂದ ವಿಶಿಷ್ಟವಾದ ಅರಿವನ್ನು ಪಡೆದ ವಿಜ್ಞಾನಿ ಮಾತ್ರ ಭಗವಂತನನ್ನು ಕಾಣಬಲ್ಲ. ಇಲ್ಲಿ ವಿಜ್ಞಾನಿ ಅಂದರೆ ಯಾವುದೇ ಒಂದು ವಸ್ತುವಿನ ಬಗ್ಗೆ ತಳಸ್ಪರ್ಶಿ ಜ್ಞಾನ ಉಳ್ಳವನು ಎಂದರ್ಥ.

ಈ ಶ್ಲೋಕದಲ್ಲಿ ಇನ್ನೊಂದು ವಿಷಯವಡಗಿದೆ. "ಸರ್ವತಃ ಸಂಪ್ಲುತೋದಕ" ಎಂದರೆ ನೀರು ತುಂಬಿದ ಸ್ಥಿತಿ. ಇಲ್ಲಿ ನೀರು ಎಂದರೆ ಪ್ರಳಯಜಲ. ಪ್ರಕೃತಿ ಸೂಕ್ಷ್ಮವಾದ ಪರಮಾಣುವಿನ ಸಮುದ್ರ ರೂಪದಲ್ಲಿರುವ ಕಾಲ-ಪ್ರಳಯ ಕಾಲ. ಇಂತಹ ಪ್ರಳಯ ಸಮುದ್ರದಲ್ಲಿ ಮಲಗಿರುವವ 'ಉದಪಾನ'. ಉತ್+ಅಪ+ಪಾನ-ಅಂದರೆ ಎಲ್ಲಕ್ಕಿಂತ ಉತ್ಕೃಷ್ಟವಾದ, ಸದಾ ಎಚ್ಚರದಿಂದಿರುವ(ಉತ್); ಎಲ್ಲರನ್ನು ಪಾಲಿಸುವ, ಹಾಗೂ ತನಗೆ ಹಿರಿದಾದ ಇನ್ನೊಬ್ಬ ಪಾಲಕನಿಲ್ಲದ ಸರ್ವೋತ್ತಮ(ಅಪ); ಎಲ್ಲರನ್ನೂ ನಿಯಂತ್ರಿಸುವ ಸರ್ವಚೇಷ್ಟಕ(ಅನ). ಈ ತತ್ವದ ಮೂಲಕ ಏನೇನು ಉಪಯೋಗವನ್ನು ಪಡೆಯಬಹುದೋ ಆ ಉಪಯೋಗವನ್ನು ಸಮಸ್ತ ವೇದದಲ್ಲಿ, ವೇದದ

ಒಂದೊಂದು ಮಂತ್ರದಲ್ಲಿ, ಮಂತ್ರದ ಒಂದೊಂದು ವಾಕ್ಯದಲ್ಲಿ, ವಾಕ್ಯದ ಒಂದೊಂದು ಪದದಲ್ಲಿ, ಪದದ ಒಂದೊಂದು ಅಕ್ಷರದಲ್ಲಿ ಭಗವಂತನನ್ನು ಕಾಣುವ ಬ್ರಹ್ಮಜ್ಞಾನಿ ಪಡೆಯುತ್ತಾನೆ.

ವೇದವನ್ನು ಕೇವಲ ಮೇಲ್ನೋಟದಲ್ಲಿ ಓದಿದರೆ ಅದರಿಂದ ಏನೂ ಉಪಯೋಗವಿಲ್ಲ. ವೇದದ ಸಮಗ್ರ ಮಂತ್ರದಲ್ಲಿ, ಮಂತ್ರದ ಒಂದೊಂದು ಅಕ್ಷರದಲ್ಲಿ ಭಗವಂತನನ್ನು ಕಂಡು ಭಗವನ್ಮಯನಾದಾಗ, ಭಗವಂತನ ಸಮಸ್ತ ಅನುಗ್ರಹಕ್ಕೆ ಪಾತ್ರನಾಗಿ, ಸಮಗ್ರ ಉಪಯೋಗವನ್ನು ಪಡೆಯಬಹುದು.

"ಫಲ ಕಾಮನೆಯಿಂದ ಕರ್ಮಕಾಂಡ ಬೇಡ, ಸಮಗ್ರವೇದವನ್ನು ಭಗವಂತನ ಚಿಂತನೆಗೆ ಮೀಸಲಿಡಿ" ಎಂದು ಹೇಳಿದ ಕೃಷ್ಣನ ಮಾತಿನಿಂದ ನಮಗೆ ಸ್ವಲ್ಪ ಗೊಂದಲವಾಗಬಹುದು. ಏಕೆಂದರೆ ವೇದದಲ್ಲಿ ಪ್ರತಿಯೊಂದು ಕಡೆ ಫಲವನ್ನು ಹೇಳಿದ್ದಾರೆ. ಏಕೆ ಹೀಗೆ ಎನ್ನುವ ಪ್ರಶ್ನೆ ನಮ್ಮಲ್ಲಿ ಮೂಡುತ್ತದೆ. ಈ ಹಿಂದೆ ಹೇಳಿದಂತೆ ಅಧ್ಯಾತ್ಮದ ಪಠ್ಯಪುಸ್ತಕ ಸಾಧನೆಯ ಎಲ್ಲಾ ಹಂತದಲ್ಲೂ-ಚಿಕ್ಕವರಿಂದ ದೊಡ್ಡವರಿಗೆ ಎಲ್ಲರಿಗೂ ಒಂದೆ. ಇನ್ನೂ ಆರಂಭದ ಹಂತದಲ್ಲಿರುವವರಿಗೆ ಏನನ್ನೂ ಬಯಸದೇ ನಿರ್ಲಿಪ್ತರಾಗಿ ಅನುಸರಿಸಿ ಎಂದು ಹೇಳಿದರೆ ಅವರಿಗೆ ವೇದಾಂತದ ಬಗ್ಗೆ ಆಸಕ್ತಿಯೇ ಬಾರದಿರಬಹುದು. ಅದಕ್ಕಾಗಿ, ಮಕ್ಕಳಿಗೆ ಬೆಲ್ಲ ಕೊಟ್ಟು ಔಷಧ ಕುಡಿಸಿದಂತೆ ವೇದಗಳಲ್ಲಿ ಫಲವನ್ನು ಹೇಳಿದ್ದಾರೆ. ಇದು ವೇದಾಭ್ಯಾಸದ ಆರಂಭದ ಹಂತದಲ್ಲಿ ಉಪಯುಕ್ತ.

ಕರ್ಮ ಮಾಡುವಾಗ ನಮ್ಮ ಮನಃಸ್ಥಿತಿ ಹೇಗಿರಬೇಕು ಎನ್ನುವುದನ್ನು ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರವಾಗಿ ಹೇಳಿದ್ದಾನೆ.

ಕರ್ಮಣ್ಯೇವಾಧಿಕಾರಸ್ತೇ ಮಾ ಫಲೇಷು ಕದಾಚನ ।
ಮಾ ಕರ್ಮಫಲಹೇತುರ್ಭೂರ್ಮಾ ತೇ ಸಂಗೋSಸ್ತ್ವಕರ್ಮಣಿ ॥೪೭॥

ಕರ್ಮಣಿ ಏವ ಅಧಿಕಾರಃ ತೇ ಮಾ ಫಲೇಷು ಕದಾಚನ ।

ಮಾ ಕರ್ಮಫಲ ಹೇತುಃ ಭೂಃ ಮಾ ತೇ ಸಂಗಃ ಅಸ್ತು ಅಕರ್ಮಣಿ --ಕರ್ಮದಲ್ಲಿ ಮಾತ್ರ ನಿನಗೆ ಹಕ್ಕು, ಫಲಗಳಲ್ಲಿ ಎಂದೂ ಇಲ್ಲ. ಫಲವನ್ನೇ ನಂಬಿ ಕರ್ಮ ಮಾಡಬೇಡ (ಕರ್ಮಕ್ಕೆ ಫಲ ನೀಡುವ ಶಕ್ತಿ ತಾನೆಂದು ಭ್ರಮಿಸಬೇಡ). ಅಂತೆಯೇ ನಿಷ್ಕ್ರಿಯತೆ ನಿನಗಂಟದಿರಲಿ.

ಈ ಶ್ಲೋಕವನ್ನು ಅಪಾರ್ಥ ಮಾಡಿಕೊಳ್ಳುವವರೇ ಹೆಚ್ಚು. ಕರ್ಮ ಮಾಡಬೇಕು ಆದರೆ ಫಲವನ್ನು ಬಯಸಬಾರದು ಅಂದರೆ ಏನು? ಇದು ಮನುಷ್ಯನನ್ನು ನಿಷ್ಕ್ರಿಯಗೊಳಿಸುತ್ತದೆ, ಎಂಬಿತ್ಯಾದಿ ವಾದಗಳನ್ನು ಈ ಶ್ಲೋಕದ ಮೇಲೆ ಅನೇಕ ಮಂದಿ ಮಂಡಿಸಿದ್ದಾರೆ. ಆದರೆ ಅವರ್ಯಾರೂ ಶ್ಲೋಕದ ನಿಜವಾದ ಅರ್ಥವನ್ನು ತಿಳಿಯಲು ಪ್ರಯತ್ನಿಸಿಲ್ಲ. ಇಲ್ಲಿ ಫಲವನ್ನು ಬಯಸಬೇಡ ಎಂದು ಎಲ್ಲಿಯೂ ಹೇಳಿಲ್ಲ. ಅದಕ್ಕೆ ಬದಲಾಗಿ ಫಲದಲ್ಲಿ ಅಧಿಕಾರ ಸಾಧಿಸಬೇಡ ಎಂದಿದ್ದಾನೆ ಕೃಷ್ಣ.

ಕರ್ಮ ನಿನ್ನ ಕೈಯಲ್ಲಿದೆ- ಆದರೆ ಕರ್ಮ ಫಲ ಭಗವಂತನ ಕೈಯಲ್ಲಿದೆ. ನೀನು ನಾನೇ ಕರ್ಮ ಫಲದ ಹೇತು ಎಂದು ತಿಳಿಯಬೇಡ. ಕರ್ಮಫಲದ ಹೇತು ಭಗವಂತ ಎನ್ನುವ ಎಚ್ಚರ ನಿನಗಿರಲಿ ಎನ್ನುತ್ತಾನೆ ಕೃಷ್ಣ. ಇಲ್ಲಿ ಕೃಷ್ಣ

ಬಯಕೆಯನ್ನು ನಿರಾಕರಣೆ ಮಾಡಿಲ್ಲ, ಆದರೆ 'ಹೀಗೇ ಆಗಬೇಕು' ಇಲ್ಲದಿದ್ದರೆ ನಾನು ಈ ಕರ್ಮವನ್ನು ಮಾಡಲಾರೆ ಎನ್ನುವ ಅಭಿಪ್ರಾಯ ಸರಿಯಲ್ಲ ಎಂದಿದ್ದಾನೆ. ಬಯಸುವ ಅಧಿಕಾರ ನಮಗಿದೆ ಆದರೆ ಫಲವನ್ನು ಕೊಡುವವ ಭಗವಂತ ಎನ್ನುವ ಪರಿಜ್ಞಾನ ಬೇಕು. ಎಷ್ಟೋ ಸಲ ನಾವು ಅರಿವಿಲ್ಲದೇ ತಪ್ಪನ್ನು ಬಯಸುತ್ತೇವೆ. ಆಗ ಭಗವಂತ ಅದನ್ನು ಕೊಡಲಾರ. ಏಕೆಂದರೆ ಯಾವುದು ಸರಿ, ಯಾವುದು ತಪ್ಪು ಎನ್ನುವ ಪರಿಜ್ಞಾನ ನಮಗಿಲ್ಲ. ಈ ಎಚ್ಚರ ಇದ್ದರೆ ನಮಗೆ ಫಲ ಸಿಗದಿದ್ದಾಗ ದುಃಖವಾಗುವುದಿಲ್ಲ. ನಾವು ಮಾಡುವ ಕರ್ಮವನ್ನು ನಿಷ್ಠೆಯಿಂದ ಭಗವದರ್ಪಣೆಯಾಗಿ ಮಾಡಿ, ಅದರಿಂದ ಏನು ಫಲ ಬಂತೋ ಅದನ್ನು ಹಾಗೇ ಸ್ವೀಕರಿಸುವ ಮನೋವೃತ್ತಿಯನ್ನು ಬೆಳೆಸಿಕೊಂಡರೆ ದುಃಖವಿರುವುದಿಲ್ಲ.

ಯಾವ ಕಾಲಕ್ಕೂ ನಿಷ್ಕ್ರೀಯನಾಗಿ ಕುಳಿತುಕೊಳ್ಳದೇ ಸದಾ ಕರ್ತವ್ಯಶೀಲನಾಗು ಎನ್ನುತ್ತಾನೆ ಕೃಷ್ಣ. 'ಹೀಗೇ ಆಗಬೇಕು', 'ಇಂತಹ ಫಲವೇ ಬರಬೇಕು' ಎನ್ನುವ ವಿಚಾರವನ್ನು ಬಿಟ್ಟು, ಕರ್ತವ್ಯ ನಿರ್ವಹಿಸಿದಾಗ ಯಾವ ದುಃಖವೂ ಇಲ್ಲ. ಅದನ್ನು ಬಿಟ್ಟು ಫಲದಲ್ಲಿ ಅಧಿಕಾರ ಸಾಧಿಸಿದರೆ ಆ ಫಲ ದಕ್ಕದೇ ಇದ್ದಾಗ ಆಗುವ ಆಘಾತ, ವ್ಯಾಕುಲತೆ(**Mental depression**) ಭಯಾನಕ. ಸೋಲನ್ನಾಗಲೀ ಗೆಲುವನ್ನಾಗಲೀ ಸಮನಾಗಿ ಕಾಣುವ ಮನಃಸ್ಥಿತಿ ನಮ್ಮನ್ನು ಎತ್ತರಕ್ಕೆ ಕೊಂಡೊಯ್ಯುತ್ತದೆ. ಈ ಹಿಂದೆ ಹೇಳಿದಂತೆ ನಾವು ಸೋಲಿನಲ್ಲಿ ಕಲಿತಷ್ಟು ಗೆಲುವಿನಲ್ಲಿ ಕಲಿಯಲಾಗದು. ಭಗವಂತ ನಮಗೆ ಫಲವನ್ನು ಕೊಡುವಾಗ ನಮ್ಮ ಒಳಿತನ್ನು ಗಮನದಲ್ಲಿಟ್ಟುಕೊಂಡು ಕೊಡುತ್ತಾನೆಯೇ ಹೊರತು , ನಾವು ಅಂದುಕೊಂಡಂತೆ ಅಲ್ಲ. ಬಂದದ್ದನ್ನು ಬಂದಂತೆ ಸ್ವೀಕರಿಸಿ, ಎಂದೂ ನಿಷ್ಕ್ರೀಯನಾಗದೇ, ಫಲದಲ್ಲಿ ಅಧಿಕಾರವನ್ನು ಸಾಧಿಸದೇ ಮುನ್ನಡೆಯಬೇಕು ಎನ್ನುವುದು ಕೃಷ್ಣನ ಕರ್ಮಸಿದ್ಧಾಂತ. ಇಲ್ಲಿ ಅರ್ಜುನ ತಾನು ಧರ್ಮ ರಕ್ಷಣೆ ಮಾಡಲು, ಧರ್ಮದ ವಿಜಯಕ್ಕಾಗಿ ಯುದ್ಧ ಮಾಡುತ್ತೇನೆ ಅಂದುಕೊಳ್ಳುವುದು ತಪ್ಪಲ್ಲ. ಈ ಹಂತದಲ್ಲಿ ಸೋಲು-ಗೆಲುವಿನ ಬಗ್ಗೆ ಯೋಚಿಸದೇ, ಅದನ್ನು ಪೂರ್ಣ ಭಗವಂತನಲ್ಲಿ ಅರ್ಪಿಸಿ, ತನ್ನ ಪಾಲಿಗೆ ಬಂದ ಕರ್ತವ್ಯವನ್ನು ನಿಷ್ಟೆಯಿಂದ ತನ್ನ ಶಕ್ತಿ ಮೀರಿ ನಿಭಾಯಿಸುವುದು ಆತನ ಧರ್ಮ. ಹೀಗೆ ಮಾಡಿದಾಗ ಯುದ್ಧದ ಪ್ರತಿಯೊಂದು ಹಂತದಲ್ಲಿ ಬರುವ ಫಲಿತಾಂಶ ಆತನನ್ನು ಕಂಗೆಡಿಸಲಾರವು. ಏನೇ ಫಲಿತಾಂಶ ಬಂದರೂ ಅದು ಭಗವಂತನ ಪ್ರಸಾದ ಎಂದು ಸ್ವೀಕರಿಸುತ್ತಾ ಮುಂದೆ ಸಾಗಬೇಕು ಅಷ್ಟೆ.

ಯೋಗಸ್ಥಃ ಕುರು ಕರ್ಮಾಣಿ ಸಂಗಂ ತ್ಯಕ್ತ್ವಾ ಧನಂಜಯ ।
ಸಿದ್ಧ್ಯಸಿದ್ಧ್ಯೋಃ ಸಮೋ ಭೂತ್ವಾ ಸಮತ್ವಂ ಯೋಗ ಉಚ್ಯತೇ ॥೪೮॥

ಯೋಗಸ್ಥಃ ಕುರು ಕರ್ಮಾಣಿ ಸಂಗಮ್ ತ್ಯಕ್ತ್ವಾ ಧನಂಜಯ ।
ಸಿದ್ಧಿ ಅಸಿದ್ಧ್ಯೋಃ ಸಮಃ ಭೂತ್ವಾ ಸಮತ್ವಂ ಯೋಗಃ ಉಚ್ಯತೇ - ಧನಂಜಯಾ, 'ಯೋಗ' ದಲ್ಲಿ ನೆಲೆಗೊಂಡು ಕರ್ಮಗಳನ್ನು ಮಾಡು-ಫಲದ ನಂಟನ್ನು ತೊರೆದು, ಕೆಲಸ ಕೈಗೂಡಿದರೂ, ಕೆಟ್ಟರೂ-ಸಮಭಾವದಿಂದಿರು. ಇಂತಹ ಸಮಭಾವಕ್ಕೆ 'ಯೋಗ'ವೆಂದು ಹೆಸರು.

ಎಂತಹ ಕರ್ಮ ಮಾಡುವುದಾದರೂ ಸಹ ಸುಮ್ಮನೆ ಮಾಡುವುದಲ್ಲ. ಅದರ ಹಿಂದೆ ಒಂದು ಯೋಗವಿರಬೇಕು. ಭಗವಂತ ಫಲವನ್ನು ಕೊಡತಕ್ಕಂತವ, ನನ್ನಿಂದ ಕರ್ಮವನ್ನು ಮಾಡಿಸತಕ್ಕಂತವನೂ ಅವನೇ. ಏನು ಫಲ, ಎಷ್ಟು ಫಲ, ಯಾವಾಗ ಫಲ, ಎಲ್ಲವೂ ಅವನಿಗೆ ಸೇರಿದ್ದು. ಸಿಕ್ಕಿದರೂ ಸಂತೋಷ, ಸಿಗದಿದ್ದರೂ ಸಂತೋಷ. ಇದು ಭೌತಿಕ  ಸಮತೋಲನ. ಇಂತಹ ಸಮತೋಲನದಲ್ಲಿ ಕರ್ತವ್ಯ ದೃಷ್ಟಿಯಿಂದ ಕರ್ಮವನ್ನು ಮಾಡಬೇಕು. ನಮ್ಮ ಬದುಕಿನ ಸಮಸ್ತ ಕರ್ಮದಲ್ಲಿ ಈ ಅನುಸಂಧಾನವಿದ್ದಾಗ ಅದು ಭಗವಂತನ ಪೂಜೆಯಾಗುತ್ತದೆ. ಇದೇ ಕರ್ಮಯೋಗ.

ಸಿದ್ಧಿ-ಅಸಿದ್ಧಿಯನ್ನು ಸಮಭಾವದಿಂದ ಕಾಣುವುದು ಮನಸ್ಸಿನ ಯೋಗ. ಇದೊಂದು ಮಾನಸಿಕ ಸ್ಥಿತಿ. ಈ ರೀತಿಯ ಯೋಗ ಭಾವನೆಯಿಂದ ಕರ್ಮ ಮಾಡಿದರೆ-ಫಲ ಬಂದಾಗ ಹೆಗ್ಗಳಿಕೆ ಇರುವುದಿಲ್ಲ, ಬಾರದೇ ಇದ್ದಾಗ ದುಃಖವಿರುವುದಿಲ್ಲ. ಹೀಗೆ ಸಿದ್ಧಿ-ಅಸಿದ್ಧಿಗಳ ಸಮತ್ವದಿಂದ ಮಾಡುವ ಪ್ರತಿಯೊಂದು ಕರ್ತವ್ಯವೂ ಕೂಡಾ ಭಗವಂತನ ಪೂಜೆಯಾಗುತ್ತದೆ. ಈ ಅನುಸಂಧಾನವಿಲ್ಲದೆ ಮಾಡುವ ಮಹಾಯಜ್ಞ ಕೂಡಾ ಪೂಜೆ ಆಗಲಾರದು. ಭಗವಂತ ನನ್ನಿಂದ ಈ ಕೆಲಸವನ್ನು ಮಾಡಿಸಿದ. ಇದು ಭಗವಂತನ ಪೂಜಾರೂಪವಾಗಿ ಅರ್ಪಿತವಾಗಲಿ ಎನ್ನುವ ಅನುಸಂಧಾನವಿದ್ದಾಗ ಮಾತ್ರ ಕರ್ಮ-ಯೋಗವಾಗುತ್ತದೆ. ನಮ್ಮ ಮನಸ್ಸು ಭಗವಂತನಲ್ಲಿ ಸಂಯೋಗ ಹೊಂದುವುದೇ ಯೋಗ. ಈ ಅನುಸಂಧಾನಕ್ಕೆ ಪೂರಕವಾದ ಮತ್ತು ಅನುಸಂಧಾನಪೂರ್ವಕವಾದ ಎಲ್ಲಾ ಕರ್ಮವೂ ಕರ್ಮಯೋಗ.

ದೂರೇಣ ಹ್ಯವರಂ ಕರ್ಮ ಬುದ್ಧಿಯೋಗಾದ್  ಧನಂಜಯ ।
ಬುದ್ಧೌ ಶರಣಮನ್ವಿಚ್ಛ ಕೃಪಣಾಃ ಫಲಹೇತವಃ ॥೪೯॥

ದೂರೇಣ ಹಿ ಅವರಮ್ ಕರ್ಮ ಬುದ್ಧಿಯೋಗಾತ್ ಧನಂಜಯ ।
ಬುದ್ಧೌ ಶರಣಮ್ ಅನ್ವಿಚ್ಛ ಕೃಪಣಾಃ ಫಲಹೇತವಃ -- ಧನಂಜಯಾ, ಅರಿವಿನ ದಾರಿಗಿಂತ ಕರ್ಮದ ದಾರಿ ತುಂಬಾ ಕೀಳು. ಅದರಿಂದ ಅರಿವಿನಲ್ಲಿ ನೆಲೆನಿಲ್ಲು.[ಅರಿವು ಬಂದ ಮೇಲೂ ಹರಿಗೆ ಶರಣಾಗು]. ಫಲವನ್ನೇ ನಂಬಿ ನಿಂತವರು ಮರುಕಪಡಬೇಕಾದವರು.

ಪ್ರಪಂಚದಲ್ಲಿ ಕೆಲವರು ಕರ್ಮಯೋಗಿಗಳು, ಇನ್ನು ಕೆಲವರು ಜ್ಞಾನಯೋಗಿಗಳು. ಕರ್ಮಯೋಗಿಗಳಿಗೆ ಜ್ಞಾನವಿಲ್ಲ, ಹಾಗೂ ಜ್ಞಾನ ಬಂದ ಮೇಲೆ ಕರ್ಮ ಬೇಕಿಲ್ಲ ಎನ್ನುವ ಚಿಂತನೆ ಕೆಲವರದು. ಕೆಲವರು ಕರ್ಮ ಮೇಲೆನ್ನುತ್ತಾರೆ ಮತ್ತೆ ಕೆಲವರು ಜ್ಞಾನ ಮೇಲು ಎನ್ನುತ್ತಾರೆ. ಇನ್ನು ಕೆಲವರು ಕರ್ಮ ಮತ್ತು  ಜ್ಞಾನ- 'ಎರಡು ಚಕ್ರಗಳಂತೆ' ಸಮಾನ ಎಂದು ವಾದ  ಮಾಡುತ್ತಾರೆ. ಇದರಿಂದ ಅನೇಕ ದ್ವಂದ್ವಗಳು ಹುಟ್ಟಿಕೊಳ್ಳುತ್ತವೆ. ಆದರೆ ಕೃಷ್ಣ ಇಲ್ಲಿ ಸ್ಪಷ್ಟವಾಗಿ ಹೇಳುತ್ತಾನೆ: ಜ್ಞಾನದ ಮುಂದೆ ಕರ್ಮ ಬಹಳ ದೂರ ಎಂದು. ಕರ್ಮ ಮಾಡುವಾಗ ಜ್ಞಾನ ಅತಿಮುಖ್ಯ. ಜ್ಞಾನಕ್ಕೋಸ್ಕರ  ಕರ್ಮವಿರುವುದೇ ಹೊರತು ಅದು ಜ್ಞಾನಕ್ಕೆ ಸಮಾನ ಅಲ್ಲ. ಅದಕ್ಕಾಗಿ ಜ್ಞಾನಕ್ಕೆ ಶರಣಾಗಿ ಜ್ಞಾನಕ್ಕೆ ಪೂರಕವಾದ ಕರ್ಮ ಮಾಡಬೇಕು. ಜ್ಞಾನವಿಲ್ಲದೆ, ಫಲಾಪೇಕ್ಷೆಯಿಂದ ಕರ್ಮ ಮಾಡುವವರ ಸ್ಥಿತಿ ಶೋಚನೀಯ. ಇವರು  ಕರ್ಮದ ಮರ್ಮವನ್ನು ತಿಳಿಯದೇ ಕರ್ಮ ಮಾಡಿ ಒದ್ದಾಡುತ್ತಿರುತ್ತಾರೆ.

ಜ್ಞಾನದ ಮಾರ್ಗದಲ್ಲಿ ಎತ್ತರಕ್ಕೇರಲು ನಾವು ಕರ್ಮವನ್ನು ಮಾಡಬೇಕು. ಇದರಿಂದ ಭಗವಂತನ ಸಾಕ್ಷಾತ್ಕಾರವಾಗುತ್ತದೆ. ಈ ಸ್ಥಿತಿಯಲ್ಲಿ ಅಹಂಕಾರ ಪಡದೆ, ಭಗವಂತನೇ ನನ್ನ ರಕ್ಷಕ ಹಾಗೂ ಆತನೇ ನನ್ನ ನೆಲೆ ಎಂದು ತಿಳಿದು ಆತನಲ್ಲಿ ಶರಣಾಗಬೇಕು. ದೇವರಿಗೆ ನಾನು ನನ್ನನ್ನು ಅರ್ಪಿಸಿಕೊಂಡಿದ್ದೇನೆ, ಆತ ನನ್ನನ್ನು ರಕ್ಷಿಸಿಯೇ ರಕ್ಷಿಸುತ್ತಾನೆ ಎನ್ನುವ ಮನವರಿಕೆ **(conviction)** ಶರಣಾಗತಿ.

ನಮಗೆ ಏನಾದರೂ ಸಮಸ್ಯೆ ಬಂದಾಗ ಭಗವಂತನ ಹತ್ತಿರ ಪ್ರಾರ್ಥಿಸಿಕೊಳ್ಳಬೇಕೇ ಹೊರತು ಅನ್ಯರನ್ನಲ್ಲ. "ಓ ಭಗವಂತಾ, ನನ್ನನ್ನು ಏಕೆ ಈ ಸಮಸ್ಯೆಯಲ್ಲಿ ಸಿಲುಕಿಸಿದಿ? ಇದಕ್ಕೆ ಪರಿಹಾರವನ್ನು ತೋರಿಸು ತಂದೆ" ಎಂದು ಮನಃಪೂರ್ವಕವಾಗಿ ಕೇಳಿಕೊಂಡರೆ ಖಂಡಿತ ಆತ ನಮ್ಮನ್ನು ಸಂಕಟದಿಂದ ಪಾರು ಮಾಡುತ್ತಾನೆ. ಆದರೆ ಇಲ್ಲಿ ಕೂಡಾ ಫಲದ ಅಧಿಕಾರ ಸಾಧಿಸದೆ, ಕೇವಲ ಭಗವಂತನನ್ನು ನಂಬಿ, ನಮ್ಮ ಎಲ್ಲಾ ಸಮಸ್ಯೆಗಳ ನಡುವೆಯೂ ನಿಶ್ಚಿಂತೆಯಿಂದ ಬದುಕಲು ಕಲಿಯಬೇಕು.

ಮುಂದಿನ ಶ್ಲೋಕವನ್ನು ನೋಡುವ ಮೊದಲು ಇಲ್ಲಿ ಬಂದಿರುವ ಧನಂಜಯ ಎನ್ನುವ ನಾಮವಿಶೇಷಣದ ಅರ್ಥವನ್ನು ತಿಳಿಯೋಣ. ಈ ಸಂಬೋಧನೆಗೆ ಎರಡು ಅರ್ಥವಿದೆ. ಒಂದು ಲೌಕಿಕ ಹಾಗೂ ಇನ್ನೊಂದು ಆಧ್ಯಾತ್ಮಿಕ ಅರ್ಥ. ಲೌಕಿಕವಾಗಿ ನೋಡಿದರೆ ಅರ್ಜುನ ಅನೇಕ ಕಡೆ ಯುದ್ಧ ಮಾಡಿ, ದೇಶದ ಸೀಮೆಯನ್ನು ವಿಸ್ತರಿಸಿ, ರಾಜಕೋಶದ ಸಂಪತ್ತನ್ನು ವೃದ್ಧಿ ಮಾಡಿದವ-ಆದ್ದರಿಂದ ಆತ ಧನಂಜಯ. ಆಧ್ಯಾತ್ಮಿಕವಾಗಿ ನೋಡಿದರೆ ಈ ನಾಮಕ್ಕೆ ವಿಶೇಷ ಅರ್ಥವಿದೆ. ಭಗವಂತನ ಆರಾಧನೆ, ಅಧ್ಯಾತ್ಮದ ಅರಿವು-ನಿಜವಾದ ಧನ. ಭಗವಂತನ ಅರಿವು, ಜ್ಞಾನ ಎಲ್ಲಕ್ಕಿಂತ ದೊಡ್ಡ ಸಂಪತ್ತು. ಅರ್ಜುನ ಆ ಕಾಲದ ಅಪರೋಕ್ಷ ಜ್ಞಾನಿ. ಆತ ಸ್ವಯಂ ಇಂದ್ರ. ಆತ ಜ್ಞಾನದ ಸಂಪತ್ತಿನ ಪರಾಕಾಷ್ಠೆ. 'ಇಂತಹ ಜ್ಞಾನಿಯಾದ ನೀನು ಭಗವಂತನಿಗೆ ಶರಣಾಗಿ, ಬುದ್ಧಿಪೂರ್ವಕವಾಗಿ ಕರ್ಮಮಾಡು' ಎನ್ನುವ ಅರ್ಥದಲ್ಲಿ ಕೃಷ್ಣ ಈ ಸಂಬೋಧನೆ ಮಾಡಿದ್ದಾನೆ.

ಬುದ್ಧಿಯುಕ್ತೋ ಜಹಾತೀಹ ಉಭೇ ಸುಕೃತದುಷ್ಕೃತೇ ।
ತಸ್ಮಾದ್ ಯೋಗಾಯ ಯುಜ್ಯಸ್ವ ಯೋಗಃ ಕರ್ಮಸು ಕೌಶಲಮ್ ॥೫೦॥

ಬುದ್ಧಿಯುಕ್ತಃ ಜಹಾತಿ ಇಹ ಉಭೇ ಸುಕೃತದುಷ್ಕೃತೇ ।
ತಸ್ಮಾತ್ ಯೋಗಾಯ ಯುಜ್ಯಸ್ವ ಯೋಗಃ ಕರ್ಮಸು ಕೌಶಲಮ್- ಭಗವಂತನನ್ನರಿತವನು ಬೇಡವಾದ ಪುಣ್ಯಪಾಪಗಳೆರಡನ್ನೂ ಇಲ್ಲೇ ತೊರೆಯುತ್ತಾನೆ. ಆದ್ದರಿಂದ ಅರಿವಿನ 'ಯೋಗ'ಕ್ಕೆ ತೊಡಗು. 'ಯೋಗ'ವೆಂದರೆ ಇದೇ: ತಿಳಿದು ಮಾಡುವ ಜಾಣತನ.

ತಿಳುವಳಿಕೆಯಿಂದ ಕರ್ಮ ಮಾಡಿದರೆ ತನ್ನ ಎಲ್ಲಾ ಪಾಪಗಳನ್ನು ಹಾಗೂ ಬೇಡವಾದ ಪುಣ್ಯವನ್ನು ತೊರೆದು ಭಗವಂತನನ್ನು ಸೇರುತ್ತಾನೆ. ಇಲ್ಲಿ ಬೇಡವಾದ ಪುಣ್ಯ ಅಂದರೆ: ಉದಾಹರಣೆಗೆ ಒಬ್ಬ ಮಹಾತ್ಮ ತನ್ನ ಜ್ಞಾನ ಕರ್ಮಗಳಿಂದ ಮೋಕ್ಷವನ್ನು ಪಡೆಯುತ್ತಾನೆ. ಹೀಗೆ ಈ ಮಾರ್ಗದಲ್ಲಿರುವಾಗ ಆತ ಇತರ ಪುಣ್ಯವನ್ನೂ ಗಳಿಸುತ್ತಾನೆ. ಒಂದು ವೇಳೆ ಆತ ಚಕ್ರವರ್ತಿಯಾಗಿ ಮೆರೆಯುವ ಪುಣ್ಯವನ್ನು ಪಡೆದಿದ್ದರೆ ಅದು ಆತನಿಗೆ ಬೇಡವಾದ ಪುಣ್ಯ. ಏಕೆಂದರೆ ಮೋಕ್ಷದ ಮುಂದೆ ಈ ಪುಣ್ಯದ ಅವಶ್ಯಕತೆ ಆತನಿಗಿಲ್ಲ. ಆತ ಈ ಪುಣ್ಯವನ್ನು ಇಲ್ಲೇ

ತೊರೆಯುತ್ತಾನೆ. ಇದನ್ನು ಇಲ್ಲಿ ಬೇಡವಾದ ಪುಣ್ಯ ಎಂದಿರುವುದು. ಯಾರು ಹೀಗೆ ಭಗವತ್ಪ್ರಜ್ಞೆಯಲ್ಲಿ ಬದುಕುತ್ತಾರೋ ಅವರು ಮಾಡಿದ ಕರ್ಮ ಅವರ ಪಾಪ ಪುಣ್ಯದ ಬಂಧನಕ್ಕೆ ಕಾರಣವಾಗುವುದಿಲ್ಲ. ಆದ್ದರಿಂದ ಜ್ಞಾನಯೋಗದಲ್ಲಿ ನಿಂತು ಆ ಅರಿವಿನಿಂದ ಕರ್ಮವನ್ನು ಮಾಡುವುದು ಜಾಣತನ.

ಕರ್ಮಜಂ ಬುದ್ಧಿಯುಕ್ತಾ ಹಿ ಫಲಂ ತ್ಯಕ್ತ್ವಾ ಮನೀಷಿಣಃ ।
ಜನ್ಮಬಂಧವಿನಿರ್ಮುಕ್ತಾಃ ಪದಂ ಗಚ್ಛಂತ್ಯನಾಮಯಮ್ ॥೫೧॥

ಕರ್ಮಜಮ್ ಬುದ್ಧಿಯುಕ್ತಾಃ ಹಿ ಫಲಮ್ ತ್ಯಕ್ತ್ವಾ ಮನೀಷಿಣಃ ।
ಜನ್ಮಬಂಧ ವಿನಿರ್ಮುಕ್ತಾಃ ಪದಮ್ ಗಚ್ಛಂತಿ ಅನಾಮಯಮ್ --ಬಲ್ಲವರು ಭಗವಂತನ ಅರಿವು ಪಡೆದು, ಕರ್ಮ ಫಲದ ಹೊಣೆಯನ್ನು ಅವನಿಗೊಪ್ಪಿಸಿ, ಹುಟ್ಟು ಸಾವಿನ ಕಟ್ಟು ಕಳಚಿಕೊಂಡು, ಕ್ಲೇಶರಹಿತವಾದ ಪದವನ್ನು ಪಡೆಯುತ್ತಾರೆ.

ನಿಜವಾದ ಮನಿಷಿಗಳು ತಮ್ಮ ಮನಸ್ಸನ್ನು ತಾವೇ ನಿಯಂತ್ರಿಸಿಕೊಳ್ಳಬಲ್ಲ ಜಿತೇಂದ್ರಿಯರು. ಆತ್ಮಸಂಯಮ ಇರುವ ಜ್ಞಾನದ ಮಾರ್ಗದಲ್ಲಿ ಸಾಗಿ ಆ ಅರಿವನ್ನು ಪಡೆದವರು. ಬುದ್ಧಿವಂತರಾದ ಜ್ಞಾನಿಗಳು ಕರ್ಮದಿಂದ ಬರತಕ್ಕಂತಹ ಫಲದ ಮೋಹವನ್ನು(attachment) ಬಿಟ್ಟು ಅದನ್ನು ಭಗವಂತನಿಗೆ ಅರ್ಪಿಸುತ್ತಾರೆ. ಹೀಗೆ ಯಾರು ಕರ್ಮ ಫಲವನ್ನು ಭಗವಂತನಿಗೆ ಅರ್ಪಣ ಬುದ್ಧಿಯಿಂದ ತ್ಯಾಗ ಮಾಡಿ ನಿರ್ವಂಚನೆಯಿಂದ ಕರ್ಮ ಮಾಡುತ್ತಾರೊ, ಅವರು ಕರ್ಮ ಮಾಡಿದರೂ ಕರ್ಮಬಂಧನಕ್ಕೊಳಪಡದೇ, ಎಲ್ಲಾ ಬಂಧನವನ್ನು ಕಳಚಿಕೊಂಡು, ದೋಷ ರಹಿತವಾದ ಮೋಕ್ಷವನ್ನು ಪಡೆಯುತ್ತಾರೆ. ಆದ್ದರಿಂದ ಕರ್ತವ್ಯ ಕರ್ಮವನ್ನು ಭಗವಂತನ ಆರಾಧನೆ ಎಂದು ಮಾಡಿ ಮೋಕ್ಷ ಪಡೆಯಬೇಕು. ಇದನ್ನು ಹೊರತುಪಡಿಸಿ 'ನಾನು ಜ್ಞಾನಿ, ನಾನೇನೂ ಮಾಡಲಾರೆ' ಎನ್ನುವ ಧೋರಣೆ ಸರಿಯಲ್ಲ.

ಯದಾ ತೇ ಮೋಹಕಲಿಲಂ ಬುದ್ಧಿರ್ವ್ಯತಿತರಿಷ್ಯತಿ ।
ತದಾ ಗಂತಾನಿ ನಿರ್ವೇದಂ ಶ್ರೋತವ್ಯಸ್ಯ ಶ್ರುತಸ್ಯ ಚ ॥೫೨॥

ಯದಾ ತೇ ಮೋಹ ಕಲಿಲಮ್ ಬುದ್ಧಿಃ ವ್ಯತಿತರಿಷ್ಯತಿ ।
ತದಾ ಗಂತಾ ಅನಿ ನಿರ್ವೇದಮ್ ಶ್ರೋತವ್ಯಸ್ಯ ಶ್ರುತಸ್ಯ ಚ --ಎಂದು ನಿನ್ನ ಬುದ್ಧಿ ಅಜ್ಞಾನದ ಕೊಳೆಯನ್ನು ಕಳೆದುಕೊಳ್ಳುವುದೋ, ಅಂದು ಮುಂದೆ ಕೇಳುವ, ಹಿಂದೆ ಕೇಳಿದ ಉಪದೇಶದ ಪೂರ್ತಿ ಫಲವನ್ನು ಪಡೆಯುವೆ.

ಯಾವಾಗ ನಾವು ಓದಿದ್ದು ಕೇಳಿದ್ದು ಸಾರ್ಥಕವಾಗುವುದು? ನಮ್ಮ ಬುದ್ಧಿ ಎಷ್ಟು ಕೇಳಿದರೂ ಕೂಡಾ ಪುನಃ ಗೊಂದಲದಲ್ಲೇ ಇದ್ದರೆ-ಎಷ್ಟು ಕೇಳಿಯೂ ಉಪಯೋಗವಿಲ್ಲ. ಓದುವುದರಿಂದ, ಕೇಳುವುದರಿಂದ ನಮ್ಮ ಮನಸ್ಸಿನ ಕೊಳೆ ತೊಳೆದು ಹೋಗಿ ಮನಸ್ಸು ತಿಳಿಯಾಗಬೇಕು. ಇಂತಹ ಮನಸ್ಸಿಗೆ ಎಂದೂ ದುಗುಡ, ಆತಂಕ

ಇರುವುದಿಲ್ಲ. ಈ ಸ್ಥಿತಿಯಲ್ಲಿ ಕೋಪ ಬಾರದು. ಇಂತಹ ರಾಗ-ದ್ವೇಷ ರಹಿತವಾದ, ಎಂತಹ ಸಂದರ್ಭದಲ್ಲೂ ಸಮತೋಲನ ಕಳೆದುಕೊಳ್ಳದ ಮನಸ್ಸು ಬಂದಾಗ, ಓದಿದ್ದು, ಕೇಳಿದ್ದು ಸಾರ್ಥಕವಾಗುತ್ತದೆ.ಇಂತಹ ಸ್ಥಿತಿಯಲ್ಲಿ ಹಿಂದೆ ಕೇಳಿದ, ಹಾಗೂ ಇನ್ನು ಕೇಳುವ ಉಪದೇಶ ಪೂರ್ತಿ ಫಲವನ್ನು ಕೊಡುತ್ತದೆ.

ಶ್ರುತಿವಿಪ್ರತಿಪನ್ನಾ ತೇ ಯದಾ ಸ್ಥಾಸ್ಯತಿ ನಿಶ್ಚಲಾ।
ಸಮಾಧಾವಚಲಾ ಬುದ್ಧಿಸ್ತದಾ ಯೋಗಮವಾಪ್ಸ್ಯಸಿ ॥೫೩॥

ಶ್ರುತಿ ವಿಪ್ರತಿಪನ್ನಾ ತೇ ಯದಾ ಸ್ಥಾಸ್ಯತಿ ನಿಶ್ಚಲಾ ।
ಸಮಾಧೌ ಅಚಲಾ ಬುದ್ಧಿಃ ತದಾ ಯೋಗಮ್ ಅವಾಪ್ಸ್ಯಸಿ- ಮೊದಲು ಶ್ರುತಿಗಳಿಗೆ ಹೊಂದಿಕೊಳ್ಳದಿದ್ದ,[ಮತ್ತೆ ಶ್ರುತಿಗಳಿಂದ ಶ್ರುತಿಗೂಡಿದ,] ನಿನ್ನ ಬುದ್ಧಿ ಎಂದು ನಿಜದ ಅರಿವಿನಿಂದ ಗಟ್ಟಿಗೊಂಡು, ಸಮಾಧಿಯಲ್ಲಿ ನಲುಗದೇ ನಿಲ್ಲುವುದೋ, ಅಂದು ಗುರಿ ತಲುಪುವೆ.

ಇಲ್ಲಿ 'ವಿಪ್ರತಿಪನ್ನಾ' ಅಂದರೆ 'ಅಭಿಪ್ರಾಯಭೇದ'. ಮೊದಲು ಶ್ರುತಿಗಳಿಂದ (ಶ್ರವಣದಿಂದ) ಗೊಂದಲವೆನಿಸುತ್ತದೆ. ನಂತರ ಅಲ್ಲಿಂದ ವೇದಕ್ಕೆ ಹೋದಾಗ-ವೇದದಲ್ಲಿ ಹೇಳಿದ ಸಂಗತಿಗೆ ಮನಸ್ಸು ವಿರುದ್ಧವಾಗಿ ಯೋಚಿಸುತ್ತದೆ. ಆದರೆ ಒಮ್ಮೆ ಮನಸ್ಸು ತಿಳಿಯಾದಾಗ, ಶ್ರುತಿಯಲ್ಲಿ ಹೇಳಿದ ತ್ರಿಗುಣಾತೀತ ತತ್ವದಲ್ಲಿ ಮನಸ್ಸು ಗಟ್ಟಿಯಾಗಿ ಕುಳಿತುಕೊಳ್ಳುತ್ತದೆ. ಮೊದಲು ತ್ರೈಗುಣ್ಯ ವಿಷವಾಗಿದ್ದು ನಂತರ ತ್ರೈಗುಣ್ಯದ ವಿಷವನ್ನು ಪರಿಹರಿಸುವಂತಾಗುತ್ತದೆ (ಯಾಪಯತಿ). ಒಮ್ಮೆ ಮನಸ್ಸು ನಿರ್ಮಲವಾದಾಗ ಅದು ವೇದಕ್ಕೆ ಶ್ರುತಿಗೂಡು(Tune)ತ್ತದೆ. ಅದರಿಂದಾಗಿ ವೇದದಲ್ಲಿ ಹೇಳಿರುವ ವಿಚಾರ ಮತ್ತು ನಮ್ಮ ಯೋಚನೆಗಳಲ್ಲಿ ಯಾವುದೇ ವ್ಯತ್ಯಾಸ ಕಾಣುವುದಿಲ್ಲ. ಮನಸ್ಸು ವೈದಿಕ ವಾಙ್ಮಯದಲ್ಲಿ ನೆಲೆ ನಿಲ್ಲುತ್ತದೆ. ಈ ಸ್ಥಿತಿಯಲ್ಲಿ ಧ್ಯಾನ(Meditation) ಮಾಡಿದರೆ ಮನಸ್ಸು ಸದಾ ಭಗವಂತನಲ್ಲಿ ನೆಲೆಗೊಳ್ಳುತ್ತದೆ. ಇದಕ್ಕೂ ಮುಂದೆ ಹೋಗಿ ನಿಶ್ಚಲವಾದ ಸಮಾಧಿ ಸ್ಥಿತಿಯಲ್ಲಿ, ಸ್ವರೂಪ ಚಿಂತನದಲ್ಲಿ ನೋಡಿದಾಗ- ಭಗವಂತನ ನಿಜವಾದ ರೂಪ ಸಾಕ್ಷಾತ್ಕಾರವಾಗುತ್ತದೆ. ಈ ಸ್ಥಿತಿಯಲ್ಲಿ ಮನಸ್ಸು ಕೆಲಸ ಮಾಡುವುದಿಲ್ಲ-ಆತ್ಮ ಕೆಲಸ ಮಾಡುತ್ತಿರುತ್ತದೆ. ಆತ್ಮದ ಕಣ್ಣಿನಿಂದ ಭಗವಂತನ ಸಾಕ್ಷಾತ್ಕಾರವಾಗುತ್ತದೆ- ಇದು ಸಾಧನೆಯ ಪೂರ್ಣ ಫಲ.

ಅರ್ಜುನ ಉವಾಚ
ಸ್ಥಿತಪ್ರಜ್ಞಸ್ಯ ಕಾ ಭಾಷಾ ಸಮಾಧಿಸ್ಥಸ್ಯ ಕೇಶವ ।
ಸ್ಥಿತಧೀಃ ಕಿಂ ಪ್ರಭಾಷೇತ ಕಿಮಾಸೀತ ವ್ರಜೇತ ಕಿಮ್ ॥೫೪॥

ಅರ್ಜುನಃ ಉವಾಚ -ಅರ್ಜುನ ಕೇಳಿದನು:
ಸ್ಥಿತಪ್ರಜ್ಞಸ್ಯ ಕಾ ಭಾಷಾ ಸಮಾಧಿಸ್ಥಸ್ಯ ಕೇಶವ ।
ಸ್ಥಿತಧೀಃ ಕಿಮ್ ಪ್ರಭಾಷೇತ ಕಿಮ್ ಆಸೀತ ವ್ರಜೇತ ಕಿಮ್-- ಓ ಬ್ರಹ್ಮರುದ್ರರ ನಿಯಾಮಕನೇ, ಸಮಾಧಿಯನ್ನೇರಬಲ್ಲ [ತಿಳಿವಿನ ತಪ್ಪುಗಳನ್ನು ತಿದ್ದಿಕೊಂಡ] ಅರಿವು ಗಟ್ಟಿಗೊಂಡವರನ್ನು ಹೇಗೆ

ಗುರುತಿಸುವುದು? ಅಂಥಹ ಸ್ಥಿತಪ್ರಜ್ಞ ಏನೆಂದು ನುಡಿಯುತ್ತಾನೆ? ಏನೆಂದು ಕೂಡುತ್ತಾನೆ? ಏನೆಂದು ನಡೆಯುತ್ತಾನೆ?

ಈ ಹಂತದಲ್ಲಿ ಕೃಷ್ಣ ತನ್ನ ಉಪದೇಶವನ್ನು ನಿಲ್ಲಿಸಿ ಅರ್ಜುನನ ಪ್ರಶ್ನೆಯನ್ನು ಆಲಿಸುತ್ತಾನೆ. ಮನುಷ್ಯನ ಅರಿವು ಗಟ್ಟಿಗೊಳ್ಳಬೇಕು; ಸತ್ಯದ ಸಾಕ್ಷಾತ್ಕಾರದಿಂದ ಮನುಷ್ಯ ಸ್ಥಿತಪ್ರಜ್ಞನಾಗಬಲ್ಲ. ಇಂತಹ ಸ್ಥಿತಪ್ರಜ್ಞರನ್ನು ನಾವು ಗುರುತಿಸುವುದು ಹೇಗೆ ಎನ್ನುವುದು ಅರ್ಜುನನ ಪ್ರಶ್ನೆ. ಒಬ್ಬ ಸ್ಥಿತಪ್ರಜ್ಞನನ್ನು ಆತನ ವೇಷ ಭೂಷಣದಿಂದ ಗುರುತಿಸುವುದು ಅಸಾಧ್ಯ. ಬಾಹ್ಯ ಪ್ರಪಂಚಕ್ಕೆ ಅಂಟಿಕೊಳ್ಳದೇ ಅಂತರಂಗ ಪ್ರಪಂಚದಲ್ಲಿ ಸಮಾಧಿಸ್ಥಿತಿಯನ್ನು ತಲುಪಿದ ಅವರನ್ನು ಹೇಗೆ ಗುರುತಿಸಬಹುದು? ಅವರು ಬಾಹ್ಯ ಪ್ರಪಂಚದೊಂದಿಗೆ ಹೇಗೆ ವ್ಯವಹರಿಸುತ್ತಾರೆ? ಅವರ ನಡೆ-ನುಡಿ ಹೇಗಿರುತ್ತದೆ? ಎನ್ನುವುದು ಅರ್ಜುನನ ಪ್ರಶ್ನೆ.

ಇಲ್ಲಿ ಅರ್ಜುನ ಕೃಷ್ಣನನ್ನು 'ಕೇಶವ' ಎಂದು ಸಂಬೋಧಿಸಿದ್ದಾನೆ. ಈ ಸಂಬೋಧನೆಯಿಂದಲೇ ಅರ್ಥವಾಗುತ್ತದೆ, ಅರ್ಜುನ ಸ್ವಯಂ ಒಬ್ಬ ಮಹಾಜ್ಞಾನಿ ಎಂದು. ಕೇಶವ ಎಂದರೆ ಕಹ+ಈಶ, ಕಹ ಅಂದರೆ ಬ್ರಹ್ಮಶಕ್ತಿ, ಈಶ ಎಂದರೆ ಶಿವಶಕ್ತಿ. ಬ್ರಹ್ಮಶಕ್ತಿ ಮತ್ತು ಶಿವಶಕ್ತಿಯೊಳಗಿನ ಪರಶಕ್ತಿ- ಕೇಶವ . ಸೂರ್ಯನ ಕಿರಣಗಳಲ್ಲಿ ನಿಂತು ಇಡೀ ಜಗತ್ತಿಗೆ ಶಕ್ತಿ ಪ್ರಧಾನ ಮಾಡುವ ಭಗವಂತ ಕೇಶವಃ. "ಜಗತ್ತಿಗೆ ಬೆಳಕು ಕೊಡುವ ನಿನ್ನಿಂದ ನಾನು ಈ ವಿಷಯವನ್ನು ಕೇಳಿ ತಿಳಿದುಕೊಳ್ಳಲು ಉತ್ಸುಕನಾಗಿದ್ದೇನೆ" ಎನ್ನುವ ಅರ್ಥದಲ್ಲಿ ಈ ಸಂಬೋಧನೆಯಿದೆ.

ಭಗವಾನುವಾಚ ।

ಪ್ರಜಹಾತಿ ಯದಾ ಕಾಮಾನ್ ಸರ್ವಾನ್ ಪಾರ್ಥ ಮನೋಗತಾನ್

ಆತ್ಮನ್ಯೇವಾಽತ್ಮನಾ ತುಷ್ಟಃ ಸ್ಥಿತಪ್ರಜ್ಞಸ್ತದೋಚ್ಯತೇ ॥೫೫॥

ಭಗವಾನುವಾಚ -ಭಗವಂತ ಹೇಳಿದನು:

ಪ್ರಜಹಾತಿ ಯದಾ ಕಾಮಾನ್ ಸರ್ವಾನ್ ಪಾರ್ಥ ಮನಃಗತಾನ್ |

ಆತ್ಮನಿ ಏವ ಆತ್ಮನಾ ತುಷ್ಟಃ ಸ್ಥಿತಪ್ರಜ್ಞಃ ತದಾ ಉಚ್ಯತೇ- -ಪಾರ್ಥಾ, ಮನದಲ್ಲಿ ಮನೆಮಾಡಿದ ಎಲ್ಲಾ ಬಯಕೆಗಳನ್ನು ತೊರೆದಾಗ, ಪರಮಾತ್ಮನಲ್ಲೇ ನೆಲೆನಿಂತು, ಪರಮಾತ್ಮನ ಹಸಾದದಿಂದ ತಣಿದು ನಲಿದಾಗ ಸ್ಥಿತಪ್ರಜ್ಞ ಎನಿಸುತ್ತಾನೆ.

ಕೃಷ್ಣ ನೇರವಾಗಿ ಸ್ಥಿತಪ್ರಜ್ಞನ ನಡೆ-ನುಡಿಗಳ ಬಗ್ಗೆ ಹೇಳದೇ, ಆತ ಹೇಗಿರುತ್ತಾನೆ ಎನ್ನುವುದನ್ನು ಇಲ್ಲಿ ಮೊದಲು ವಿವರಿಸುತ್ತಾನೆ. ನಿಜವಾದ ಸ್ಥಿತಪ್ರಜ್ಞನಿಗೆ ಮೂಲಭೂತವಾಗಿ ಯಾವ ಬಯಕೆಯೂ ಕಾಡುವುದಿಲ್ಲ (ಇಲ್ಲಿ ಬಯಕೆ ಎಂದರೆ ಮನುಷ್ಯನನ್ನು ದಾರಿ ತಪ್ಪಿಸುವ ಕೆಟ್ಟ ಕಾಮನೆಗಳು). ಆತ ಇಂತಹ ಎಲ್ಲಾ ಕ್ಷುದ್ರ ಕಾಮನೆಗಳನ್ನು ತೊರೆದು ತನ್ನೊಳಗಿರುವ ಜ್ಞಾನಾನಂದಮಯನಾದ ಭಗವಂತನನ್ನು ಕಾಣುತ್ತಾ ಸದಾ ಸಂತೋಷವಾಗಿರುತ್ತಾನೆ.

ಮನುಷ್ಯನ ದುಃಖಕ್ಕೆ ಮೂಲ ಕಾರಣ ಆತನ ಕ್ಷುದ್ರ ಬಯಕೆಗಳು. ತನ್ನ ಬಯಕೆ ಈಡೇರದೇ ಇದ್ದಾಗ ದುಃಖ-ಕೋಪ ಇತ್ಯಾದಿ ಆರಂಭವಾಗುತ್ತದೆ. ಇದರಿಂದ ಆತ ತನ್ನ ಜೀವನವನ್ನು ನರಕವನ್ನಾಗಿ ಮಾಡಿಕೊಳ್ಳುತ್ತಾನೆ. ಇಂತಹ ಸ್ಥಿತಿಯಲ್ಲಿ ಆತನಿಗೆ ತನ್ನೊಳಗಿರುವ ಆ ಅಪೂರ್ವ ಶಕ್ತಿಯ ಬಗ್ಗೆ ಅರಿವಿರುವುದಿಲ್ಲ. ಸ್ಥಿತಪ್ರಜ್ಞನಾದವನು ಈ ಜಂಜಾಟದಲ್ಲಿ ಸಿಲುಕದೇ, ತನ್ನಂತರಂಗದಲ್ಲಿನ ಆ ಮಹದಾನಂದವನ್ನು ಸದಾ ಸವಿಯುತ್ತಾ ಸಂತೋಷವಾಗಿರುತ್ತಾನೆ. ಆತ ಕಾಮನೆಗಳಿಗೆ ಬೆಂಬೀಳುವುದಿಲ್ಲ. ಬೇಕು ಎನ್ನುವ ಬಯಕೆ ಆತನನ್ನು ಕಾಡುವುದಿಲ್ಲ. ಆತನ ಮನಸ್ಸು ಸದಾ ಪ್ರಸನ್ನವಾಗಿರುತ್ತದೆ. ಜೀವನದಲ್ಲಿ ಎಂತಹ ಸಮಸ್ಯೆ ಬಂದರೂ ಆತ ಎಂದೂ ಉದ್ವೇಗಕ್ಕೆ **(Tension or Stress)** ಒಳಗಾಗುವುದಿಲ್ಲ. ಆತನ ಮನಸ್ಸು ಗಟ್ಟಿಯಾಗಿರುತ್ತದೆ ಮತ್ತು ಇದರಿಂದಾಗಿ ಆತ ಯಶಸ್ಸನ್ನು ಕಾಣಬಲ್ಲ.

ಇಲ್ಲಿ ಕೃಷ್ಣ ಅರ್ಜುನನನ್ನು 'ಪಾರ್ಥ' ಎಂದು ಸಂಬೋಧಿಸಿದ್ದಾನೆ. ಪಾರ್ಥ ಎಂದರೆ ಪಾರ-ತೀರ-ಗಮನೆ, ಅಂದರೆ ಸತ್ಯದ, ಸಾಧನೆಯ ಕಡಲನ್ನು ದಾಟಿದವ. "ಸಾಧನೆಯ ಕಡಲನ್ನು ದಾಟಿದ ನಿನಗೆ ಇದು ಸ್ಪಷ್ಟವಾಗಿ ತಿಳಿಯಬೇಕು" ಎನ್ನುವ ಅರ್ಥದಲ್ಲಿ ಇಲ್ಲಿ ಈ ಸಂಬೋಧನೆ ಇದೆ.

ಮುಂದೆ ಬರುವ ಮೂರು ಶ್ಲೋಕಗಳಲ್ಲಿ ಕೃಷ್ಣ ಕಾಮನೆಗಳನ್ನು ಬಿಡುವುದು ಅಂದರೆ ಏನು ಹಾಗೂ ಹೇಗೆ? ಎನ್ನುವುದನ್ನು ವಿವರಿಸುತ್ತಾನೆ.

ದುಃಖೇಷ್ವನುದ್ವಿಗ್ನಮನಾಃ ಸುಖೇಷು ವಿಗತಸ್ಪೃಹಃ।
ವೀತರಾಗಭಯಕ್ರೋಧಃ ಸ್ಥಿತಧೀರ್ಮುನಿರುಚ್ಯತೇ ॥೫೬॥

ದುಃಖೇಷು ಅನುದ್ವಿಗ್ನಮನಾಃ ಸುಖೇಷು ವಿಗತಸ್ಪೃಹಃ |
ವೀತ ರಾಗ ಭಯ ಕ್ರೋಧಃ ಸ್ಥಿತಧೀ ಮುನಿಃ ಉಚ್ಯತೇ --ಸಂಕಟ ಬಂದಾಗ ಬಗೆಯಲ್ಲಿ ತಳಮಳವಿಲ್ಲ. ಸುಖದ ಸಂಗತಿಗಳಲ್ಲಿ ಹಂಬಲವಿಲ್ಲ. ಯಾವುದರಲ್ಲೂ ರಾಗವಿಲ್ಲ, ಭಯವಿಲ್ಲ, ಕ್ರೋಧವಿಲ್ಲ. ಇಂತಹ ಚಿಂತನಶೀಲ 'ಸ್ಥಿತಪ್ರಜ್ಞ' ಎನಿಸುತ್ತಾನೆ.

ಜೀವನದಲ್ಲಿ ಸುಖ-ದುಃಖಗಳು ಹಗಲು-ರಾತ್ರಿ ಇದ್ದಂತೆ. ಇದು ನಿರಂತರ ಮತ್ತು ಯಾರನ್ನೂ ಬಿಟ್ಟಿಲ್ಲ. ಕೆಲವೊಮ್ಮೆ ಸುಖ-ನಾವು ಬಯಸದೇ ಬರುತ್ತದೆ. ಅದೇ ತರಹ ಇನ್ನು ಕೆಲವೊಮ್ಮೆ ದುಃಖ ಸರಮಾಲೆಯಾಗಿ ಬೆನ್ನು ಹತ್ತುತ್ತದೆ. ದುಡ್ಡಿನಿಂದ ದುಃಖವನ್ನು ತಡೆಯಲಾಗದು-ಸುಖವನ್ನು ಖರೀದಿಸಲಾಗದು. ಸಾಮಾನ್ಯವಾಗಿ ದುಃಖ ಬಂದಾಗ ನಾವು ಉದ್ವೇಗಕ್ಕೊಳಗಾಗುತ್ತೇವೆ. ಇದರಿಂದ ಮನಸ್ಸು ಕಂಗೆಡುತ್ತದೆ, ಅದರಿಂದ ದೇಹದ ಆರೋಗ್ಯ ಕೆಡುತ್ತದೆ. ಯಾವುದು ಅನಿವಾರ್ಯವೋ ಅದರ ಬಗ್ಗೆ ಅಳುತ್ತಾ ಕುಳಿತುಕೊಂಡರೆ ಉಪಯೋಗವಿಲ್ಲ. ಅಳುತ್ತಾ ಕೂರುವುದರಿಂದ ಬಂದ ದುಃಖ ಹೋಗದು, ಬರುವ ದುಃಖವನ್ನು ತಡೆಯಲಾಗದು. ದುಃಖ 'ಸುಖದ ಸಿದ್ಧತೆ'; ಸುಖ 'ದುಃಖದ ಸಿದ್ಧತೆ'. ಇವು ಜೀವನದ ಅನಿವಾರ್ಯ ದ್ವಂದ್ವಗಳು. ಅಂದರೆ ಸುಖ ಬಂದಾಗ ಸಂತೋಷಪಡಬಾರದು ಎಂದಲ್ಲ, ಆ ಸುಖದಲ್ಲಿ ಮೈಮರೆಯಬಾರದು ಅಷ್ಟೆ. ತಟಸ್ಥತೆಯನ್ನು ಮನಸ್ಸಿಗೆ ಅಭ್ಯಾಸ ಮಾಡಿಸಬೇಕು. ಜೀವನ ಯುದ್ಧದಲ್ಲಿ ಸುಖ-ದುಃಖಗಳು ಹಾಸುಹೊಕ್ಕಾಗಿವೆ ಎನ್ನುವ ಸತ್ಯವನ್ನರಿತು ಜೀವನ ಸಾಗಿಸಬೇಕು.

ದುಃಖ ಬಂದಾಗ ಮನಸ್ಸನ್ನು ಗಟ್ಟಿಯಾಗಿಸಿಕೊಂಡು ಬದುಕಬೇಕು ಎಂದು ಹೇಳುವುದು ಸುಲಭ. ಆದರೆ ಅದನ್ನು ಜೀವನದಲ್ಲಿ ಅನುಸರಿಸುವುದು ಅಷ್ಟೇ ಕಷ್ಟ. ಇದಕ್ಕೆ ದೃಷ್ಟಾಂತ ಮಹಾಭಾರತ ಯುದ್ಧದಲ್ಲಿ ಅಭಿಮನ್ಯು ಸತ್ತಾಗ ಕಣ್ಣೀರು ಸುರಿಸಿದ ಅರ್ಜುನ. ಸ್ವಯಂ ಭಗವಂತನಿಂದ ಉಪದೇಶ ಪಡೆದು, ಭಗವಂತನ ಸಾರಥ್ಯದಲ್ಲಿ ಯುದ್ಧಕ್ಕಿಳಿದ ಸ್ಥಿತಪ್ರಜ್ಞನಾದ ಅರ್ಜುನ, ತನ್ನ ಮಗ ಅಭಿಮನ್ಯು ಸತ್ತಾಗ ದುಃಖಿಸುತ್ತಾನೆ. ನಾವು ದುಃಖವನ್ನು ಸ್ವೀಕರಿಸಲು ಅಭ್ಯಾಸ ಮಾಡಿಕೊಳ್ಳಬೇಕು. ಇಲ್ಲದಿದ್ದರೆ ಬದುಕು ದುಸ್ತರವಾಗುತ್ತದೆ.

ಯಾವುದೇ ಒಂದು ವಸ್ತುವಿನ ಬಗ್ಗೆ ಮೂರು ವಿಷಯಗಳು ಮನಸ್ಸಿನಲ್ಲಿರಬಾರದು. ಅವುಗಳೆಂದರೆ ರಾಗ-ಭಯ-ಕ್ರೋಧ. ದುಃಖದ ಪೂರ್ವ ಸ್ಥಿತಿ ಭಯ; ಭಯದ ಉತ್ತರ ಸ್ಥಿತಿ ದುಃಖ! ಅತಿಯಾಗಿ ಆಸೆ ಪಡುವುದು-ರಾಗ, ಆಸೆಪಟ್ಟ ವಸ್ತು ಸಿಗದಿದ್ದಾಗ-ನಿರಾಶೆ. ಆ ವಸ್ತು ನಮ್ಮಿಂದ ದುರ್ಬಲರಿಗೆ ಸಿಕ್ಕಿದರೆ ಅವರ ಮೇಲೆ ಕ್ರೋಧ; ನಮ್ಮಿಂದ ಬಲಿಷ್ಠರಿಗೆ ಸಿಕ್ಕರೆ ಅವರಿಂದ ಭಯ! ಇವೆಲ್ಲವೂ ಮನಸ್ಸಿನ ಹೊಯ್ದಾಟ. ವ್ಯಾಸರು ಹೇಳಿದಂತೆ "ಈ ಜಗತ್ತಿನಲ್ಲಿ ಈವರೆಗೆ ಆಗಬಾರದ್ದು ಯಾವುದೂ ಆಗಿಲ್ಲ, ಹಾಗೂ ಇನ್ನು ಮುಂದೆ ಆಗುವುದೂ ಇಲ್ಲ". ಆಗಬೇಕಾದದ್ದು ಆಗಿಯೇ ತೀರುತ್ತದೆ, ಅದರ ಬಗ್ಗೆ ಚಿಂತಿಸಿ ಫಲವಿಲ್ಲ. ಇಂತಹ ಚಿಂತನಶೀಲತೆಯನ್ನು ಮೈಗೂಡಿಸಿಕೊಂಡವನು ಸ್ಥಿತಪ್ರಜ್ಞ ಎನಿಸುತ್ತಾನೆ.

ಇಲ್ಲಿ ಮುನಿಃ ಎನ್ನುವ ಪದ ಬಳಕೆಯಾಗಿದೆ. ಮುನಿಃ ಎಂದರೆ ಕಾಮ-ಕ್ರೋಧವನ್ನು ಗೆದ್ದವನು. ನಾವು ಮನಸ್ಸನ್ನು ಎಲ್ಲಾ ಸಂದರ್ಭದಲ್ಲೂ ಏಕರೂಪವಾಗಿ ತಟಸ್ಥವಾಗಿಡಲು ಪ್ರಯತ್ನಿಸಬೇಕು. ಏನು ಬಂದರೂ ಬರಲಿ, ಭಗವಂತನ ದಯೆಯೊಂದಿರಲಿ ಎಂದು ಜೀವನದಲ್ಲಿ ಸುಖ-ದುಃಖವನ್ನು ಸಮದೃಷ್ಟಿಯಲ್ಲಿ ಕಾಣುವವ ಮುನಿ. "ನೀನೂ ಕೂಡಾ ಅಂಥಹ ಮುನಿಯಾಗು" ಎನ್ನುವುದು ಇಲ್ಲಿರುವ ಸಂದೇಶ.

ಯಃ ಸರ್ವತ್ರಾನಭಿಸ್ನೇಹಸ್ತತ್ತತ್ ಪ್ರಾಪ್ಯ ಶುಭಾಶುಭಮ್ ।
ನಾಭಿನಂದತಿ ನ ದ್ವೇಷ್ಟಿ ತಸ್ಯ ಪ್ರಜ್ಞಾ ಪ್ರತಿಷ್ಠಿತಾ ॥೫೭॥

ಯಃ ಸರ್ವತ್ರ ಅನಭಿಸ್ನೇಹಃ ತತ್ ತತ್ ಪ್ರಾಪ್ಯ ಶುಭ ಅಶುಭಮ ।
ನ ಅಭಿನಂದತಿ ನ ದ್ವೇಷ್ಟಿ ತಸ್ಯ ಪ್ರಜ್ಞಾ ಪ್ರತಿಷ್ಠಿತಾ -- ಆಯಾ ಒಳಿತು-ಕೆಡುಕುಗಳು ಬಂದೊದಗಿದಾಗ ಎಲ್ಲೂ ಅತಿಯಾಗಿ ಅಂಟಿಕೊಳ್ಳುವುದಿಲ್ಲ. ಒಳಿತಿನ ಬಗೆಗೆ ಮೆಚ್ಚೂ ಇಲ್ಲ. ಕೆಡುಕಿನ ಬಗ್ಗೆ ರೊಚ್ಚೂ ಇಲ್ಲ. ಇಂತವನ ಅರಿವು ಗಟ್ಟಿಗೊಂಡಿರುತ್ತದೆ.

ಇಲ್ಲಿ ಕೃಷ್ಣ ಹೇಳುತ್ತಾನೆ- "ದುಃಖ ಬಂದಾಗ ಕಂಗೆಡಬೇಡ, ಸುಖ ಬಂದಾಗ ಉಬ್ಬಬೇಡ, ನಿರ್ಲಿಪ್ತತೆಯನ್ನು ಅಭ್ಯಾಸ ಮಾಡು. ಯಾವುದರ ಮೇಲೂ ಅತಿಯಾದ ಆಸಕ್ತಿ( Over attachment) ಬೇಡ. ಮನಸ್ಸಿನ ಸಮತೋಲನವನ್ನು ಸಾಧಿಸು" ಎಂದು. ದುಃಖ ಎನ್ನುವುದು ಯಾರನ್ನೂ ಬಿಟ್ಟಿಲ್ಲ. ದೇವಾಂಶ ಸಂಭೂತರಾದ ಪಾಂಡವರು ಪಟ್ಟ ಕಷ್ಟವನ್ನು ನೋಡಿದರೆ ಇದು ಸ್ಪಷ್ಟ. ಜ್ಞಾನಿಗಳಾಗಲೀ, ಅಜ್ಞಾನಿಗಳಾಗಲೀ, ಎಲ್ಲರಿಗೂ ಕಷ್ಟ ಬರುತ್ತದೆ. ನಾವು ಕಷ್ಟವನ್ನು ನೋಡುವ ಮನಃಸ್ಥಿತಿಯನ್ನು ಬದಲಿಸಿಕೊಳ್ಳಬೇಕು ಅಷ್ಟೆ. "ನಾನು ಬೇಕು-

ಬೇಡವನ್ನು ಮೀರಿ ನಿಂತಿದ್ದೇನೆ, ಇಂತದ್ದೇ ಬೇಕು, ಇಂತಾದ್ದು ಬೇಡ ಎನ್ನುವ ಆಯ್ಕೆ-ಅಧಿಕಾರ ನನಗಿಲ್ಲ"- ಎನ್ನುವ ಸತ್ಯವನ್ನರಿತು ಬದುಕಿದಾಗ ಜೀವನ ಸುಗಮವಾಗುತ್ತದೆ. ಅಂತಹ ವ್ಯಕ್ತಿ ಎತ್ತರಕ್ಕೇರುತ್ತಾನೆ.

ಜ್ಞಾನಿಗಳಲ್ಲಿ ಇಂತಹ ಮನಃಸ್ಥಿತಿ ಇರುತ್ತದೆ. ಸಾಮಾನ್ಯ ಮಾನವರಾದ ನಮಗೆ ಇಂದ್ರಿಯ ನಿಗ್ರಹ ಬಹಳ ಕಷ್ಟ. ಆದರೆ ಅಸಾಧ್ಯವಲ್ಲ. ನಿರಂತರ ಸಾಧನೆಯಿಂದ ಇದನ್ನು ಸಾಧಿಸಬಹುದು. ಯಾವ ರೀತಿ ನಾವು ಇಂದ್ರಿಯ ನಿಗ್ರಹ ಮಾಡಿ ಸಾಧನೆ ಮಾಡಬೇಕು ಎನ್ನುವುದನ್ನು ದೃಷ್ಟಾಂತದೊಂದಿಗೆ ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸಿದ್ದಾನೆ.

ಯದಾ ಸಂಹರತೇ ಚಾಯಂ ಕೂರ್ಮಃ ಅಂಗಾನೀವ ಸರ್ವಶಃ ।
ಇಂದ್ರಿಯಾಣೀಂದ್ರಿಯಾರ್ಥೇಭ್ಯಸ್ತಸ್ಯ ಪ್ರಜ್ಞಾ ಪ್ರತಿಷ್ಠಿತಾ ॥೫೮॥

ಯದಾ ಸಂಹರತೇ ಚ ಅಯಮ್ಃ ಕೂರ್ಮಃ ಅಂಗಾನಿ ಇವ ಸರ್ವಶಃ ।
ಇಂದ್ರಿಯಾಣಿ ಇಂದ್ರಿಯ ಅರ್ಥೇಭ್ಯಃ ತಸ್ಯ ಪ್ರಜ್ಞಾ ಪ್ರತಿಷ್ಠಿತಾ-- ಹೇಗೆ ಆಮೆಯು ತನ್ನ ಅಂಗಗಳನ್ನು ಪೂರ್ತಿಯಾಗಿ ಚಿಪ್ಪಿನೊಳಗೆ ಎಳೆದುಕೊಳ್ಳುತ್ತದೋ ಹಾಗೇ, ಇಂದ್ರಿಯಗಳನ್ನು ಇಂದ್ರಿಯ ವಿಷಯಗಳಿಂದ ಹಿಂದಕ್ಕೆಳೆದುಕೊಳ್ಳುವವರ ಪ್ರಜ್ಞೆ ಗಟ್ಟಿಗೊಂಡಿರುತ್ತದೆ.

ನಮ್ಮನ್ನು ನಮ್ಮ ಇಂದ್ರಿಯಗಳು ದಾರಿ ತಪ್ಪಿಸುತ್ತವೆ. ಯಾವುದು ಬೇಡವೋ ಅದೇ ಬೇಕು ಎನ್ನುವ ಆಸೆ ಹುಟ್ಟಿಸುತ್ತವೆ. ಇಲ್ಲಿ ಕೃಷ್ಣ ಹೇಳುತ್ತಾನೆ: ಆಮೆ ಹೇಗೆ ತನ್ನ ನಾಲ್ಕು ಕಾಲು ಮತ್ತು ತಲೆಯನ್ನು ತನ್ನ ಚಿಪ್ಪಿನೊಳಗೆ ಸಂಪೂರ್ಣ ಎಳೆದುಕೊಂಡು ಸುರಕ್ಷಿತವಾಗಿರುತ್ತದೋ, ಹಾಗೇ ನಾವು ನಮ್ಮ ಪಂಚೇಂದ್ರಿಯಗಳನ್ನು ಗಟ್ಟಿ ಮನಸ್ಸಿನ ಕೋಟೆಯೊಳಗೆ ಎಳೆದುಕೊಂಡು ಅಂತರ್ಮುಖಗೊಳಿಸಿಕೊಳ್ಳಬೇಕು. ಇಲ್ಲಿ ಅಂತರ್ಮುಖಗೊಳಿಸುವುದು ಎಂದರೆ ನೋಡುವ ದೃಷ್ಟಿಯನ್ನು ಬದಲಿಸಿಕೊಳ್ಳುವುದು. ಎಲ್ಲವನ್ನೂ ಅಂತರಂಗ ದೃಷ್ಟಿಯಿಂದ ವಿಶ್ಲೇಷಣೆ ಮಾಡಿ, ಅದರಲ್ಲಿನ ಒಳ್ಳೆಯತನವನ್ನು ಗುರುತಿಸಿ ಗ್ರಹಣ ಮಾಡುವುದು. ಅದನ್ನು ಸೃಷ್ಟಿಸಿದ ಭಗವಂತನ ಮಹಿಮೆಯನ್ನು ಅನುಸಂಧಾನ ಮಾಡುವುದು.
ನಾವು ಭಗವಂತ ಸೃಷ್ಟಿಸಿದ ಈ ಪ್ರಪಂಚವನ್ನು ನೋಡುತ್ತೇವೆ. ನೋಡುತ್ತಾ ಅದರ ಹಿಂದೆ ಇರುವ ಆ ವಿಶ್ವಶಕ್ತಿಯ ಮಹಿಮೆಯನ್ನು ಯೋಚಿಸಿದರೆ- ಅದು ಅಂತರ್ಮುಖವಾದ ಒಳನೋಟವಾಗುತ್ತದೆ. ಎಲ್ಲವುದರ ಒಳಗೂ ಭಗವಂತನಿದ್ದಾನೆ ಎನ್ನುವ ಎಚ್ಚರ, ಒಂದೊಂದು ಅಭಿವ್ಯಕ್ತಿಯಲ್ಲಿ ಭಗವಂತನ ಒಂದೊಂದು ವಿಭೂತಿ ಇದೆ ಎನ್ನುವ ತಿಳುವಳಿಕೆ ಇದ್ದಾಗ, ಯಾವುದೂ ನಮ್ಮನ್ನು ದಾರಿ ತಪ್ಪಿಸುವುದಿಲ್ಲ. ಇದು ಜ್ಞಾನಿ ಪ್ರಪಂಚವನ್ನು ನೋಡುವ ದೃಷ್ಟಿ. ನಾವು ಪ್ರಪಂಚವನ್ನು ಬದಲಿಸಲು ಸಾಧ್ಯವಿಲ್ಲ. ಪ್ರಪಂಚವನ್ನು ನಾವು ನಮ್ಮ ಇಷ್ಟದಂತೆ ನಿಯಂತ್ರಿಸಲು ಸಾಧ್ಯವಿಲ್ಲ ಎನ್ನುವ ಸತ್ಯವನ್ನರಿತು, ಪ್ರಪಂಚ ಇದ್ದ ಹಾಗೆ ಅದಕ್ಕನುಗುಣವಾಗಿ ಬದುಕುವ ಮನೋವೃತ್ತಿಯನ್ನು ಬೆಳೆಸಿಕೊಂಡಾಗ ಯಾವ ಸಮಸ್ಯೆಯೂ ಇಲ್ಲ. ಈ ರೀತಿ ತಮ್ಮ ಇಂದ್ರಿಯಗಳನ್ನು ಅಂತರ್ಮುಖಗೊಳಿಸಿಕೊಂಡವನ ಪ್ರಜ್ಞೆ ಗಟ್ಟಿಗೊಂಡಿರುತ್ತದೆ.

ವಿಷಯಾ ವಿನಿವರ್ತಂತೇ ನಿರಾಹಾರಸ್ಯ ದೇಹಿನಃ ।
ರಸವರ್ಜಂ ರಸೋಽಪ್ಯಸ್ಯ ಪರಂ ದೃಷ್ಟ್ವಾ ನಿವರ್ತತೇ ॥೫೯॥

ವಿಷಯಾಃ ವಿನಿವರ್ತಂತೇ ನಿರಾಹಾರಸ್ಯ ದೇಹಿನಃ ।
ರಸವರ್ಜಮ್ ರಸಃ ಅಪಿ ಅಸ್ಯ ಪರಮ್ ದೃಷ್ಟ್ವಾ ನಿವರ್ತತೇ- -ಆಹಾರ ತೊರೆದ ಜೀವಿಗೆ ವಿಷಯ ಭೋಗದ ಕಸುವಷ್ಟೇ ಕುಂದುತ್ತದೆ-ನಾಲಗೆಯ ಕಸು ಮತ್ತು ಭೋಗದ ಬಯಕೆಯನ್ನು ಬಿಟ್ಟು. ಅಂತಹ ಕಸುವು-ಬಯಕೆ ಕೂಡಾ ಭಗವಂತನನ್ನು ಕಂಡಾಗ ಇಲ್ಲವಾಗುತ್ತದೆ.
ನಾವು ಸ್ಥಿತಪ್ರಜ್ಞರಾಗಬೇಕೆಂದರೆ ಇಂದ್ರಿಯಗಳನ್ನು ಅಂತರ್ಮುಖಗೊಳಿಸಬೇಕು ಎನ್ನುವ ವಿಷಯವನ್ನು ನೋಡಿದೆವು. ಆದರೆ ಅದು ಅಷ್ಟು ಸುಲಭದ ವಿಷಯವಲ್ಲ. ಸಾಧನಾ ಶರೀರದಲ್ಲಿರುವ ಸಾಧಕ, ಇಂದ್ರಿಯಗಳನ್ನು ಹೊರಗಿನ ವಿಷಯಗಳ ಜೊತೆಗೆ ಸಂಪರ್ಕ ಆಗದಂತೆ ತಡೆದರೆ(ಏಕಾಂತದ ಅಭ್ಯಾಸ), ನೋಡುವ, ಕೇಳುವ ಎಲ್ಲಾ ಆಸೆಗಳು ಹೊರಟು ಹೋಗಬಹುದು. ಆದರೆ ರುಚಿ(ನಾಲಿಗೆಯ ಚಪಲ) ಮತ್ತು ಶೃಂಗಾರ(ಲೈಂಗಿಕ ಬಯಕೆ)ವನ್ನು ನಿವಾರಿಸುವುದು ಬಹಳ ಕಷ್ಟ. ಈ ಕಾರಣಕ್ಕಾಗಿ ನಾವು ಬ್ರಹ್ಮಚರ್ಯ ಪಾಲನೆ ಮಾಡಬೇಕೆಂದಿದ್ದರೆ ಒಮ್ಮೆ ಶೃಂಗಾರ ಭೋಗವನ್ನು ಅನುಭವಿಸಿ, ದಾಂಪತ್ಯವೆಂದರೆ ಏನು ಎಂದು ಅರಿತು, ಆನಂತರ ಬ್ರಹ್ಮಚರ್ಯಕ್ಕೆ ಕಾಲಿಟ್ಟರೆ ಸಾಧನೆ ಸುಲಭ. ನಿಯಮಿತ ಆಹಾರ, ಉಪವಾಸ- ಅಧ್ಯಾತ್ಮಕ್ಕೆ ಪೂರಕ. ಅತಿ ಆಹಾರ, ತಾಮಸ ಹಾಗೂ ರಾಜಸ ಆಹಾರ (ಉದಾ: ತೊಗರಿಬೇಳೆ, ಈರುಳ್ಳಿ, ಬೆಳ್ಳುಳ್ಳಿ, ನುಗ್ಗೆಕಾಯಿ, ಅತಿಯಾದ ಮಸಾಲೆ ಪದಾರ್ಥ, ಮಾಂಸಾಹಾರ ಇತ್ಯಾದಿ) ಅಧ್ಯಾತ್ಮ ಸಾಧನೆಗೆ ತೀರಾ ವಿರುದ್ಧ. (ಈ ಕಾರಣಕ್ಕಾಗಿ ಯಾರೇ ಅತಿಥಿ ಬಂದಾಗ ಅವರಿಗೆ ಒತ್ತಾಯ ಪೂರ್ವಕವಾಗಿ ಆಹಾರ ನೀಡಬಾರದು; ಮಾಡಿದ ಅಡಿಗೆ ಮಿಕ್ಕಿದಾಗ ಹಾಳಾಗುತ್ತಲ್ಲಾ ಅಂತ ತಿನ್ನುವುದರಿಂದ ಆಹಾರವೂ ಹಾಳು ದೇಹವೂ ಹಾಳು! ). ಒಟ್ಟಿನಲ್ಲಿ ಅಧ್ಯಾತ್ಮ ಸಾಧನೆಯಲ್ಲಿ ಏಕಾಂತ ಹಾಗೂ ಆಹಾರ ನಿಯಂತ್ರಣ ಸಾಧನೆಗೆ ಪೂರಕ . ಇದರಿಂದ ನಮ್ಮ ನಾಲಿಗೆಯ ಮತ್ತು ಭೋಗದ ಚಪಲ ಸಂಪೂರ್ಣ ನಿಗ್ರಹ ಆಗದಿದ್ದರೂ ಕೂಡಾ ಅವು ಭಗವಂತನಲ್ಲಿ ಸಂಪೂರ್ಣ ಶರಣಾದಾಗ ಇಲ್ಲವಾಗುತ್ತವೆ.

ಯತತೋ ಹ್ಯಪಿ ಕೌಂತೇಯ ಪುರುಷಸ್ಯ ವಿಪಶ್ಚಿತಃ ।
ಇಂದ್ರಿಯಾಣಿ ಪ್ರಮಾಥೀನಿ ಹರಂತಿ ಪ್ರಸಭಂ ಮನಃ ॥೬೦॥

ಯತತಃ ಹಿ ಅಪಿ ಕೌಂತೇಯ ಪುರುಷಸ್ಯ ವಿಪಶ್ಚಿತಃ ।
ಇಂದ್ರಿಯಾಣಿ ಪ್ರಮಾಥೀನಿ ಹರಂತಿ ಪ್ರಸಭಮ್ ಮನಃ -- ಸಾಧಕ ಸಾಕಷ್ಟು ತಿಳಿದುಕೊಂಡರೂ, ಸಾಕಷ್ಟು ಪ್ರಯತ್ನಿಸಿದರೂ ಕೂಡಾ, ಇಂದ್ರಿಯಗಳು ಬಲವಂತವಾಗಿ ಮನಸ್ಸನ್ನು ಕಲಕಿ ಸೆಳೆದುಬಿಡುತ್ತವೆ.

ನಾವು ಎಷ್ಟು ಓದಿ , ಕೇಳಿ ತಿಳಿದುಕೊಂಡರೂ ಕೂಡಾ, ಸಾಧನೆಯ ಈ ದಾರಿ ಅಷ್ಟು ಸುಲಭದ್ದಲ್ಲ. ಪ್ರಯತ್ನದ ಫಲವಿಲ್ಲದೇ ಇದು ಅಸಾಧ್ಯ. ಅಧ್ಯಾತ್ಮದ ದಾರಿಯಲ್ಲಿ ಸಾಗಲು ಮನಸ್ಸು ಗಟ್ಟಿಯಾಗಿರಬೇಕು. ಆದರೆ ಇಲ್ಲಿ ಒಂದು ಸಮಸ್ಯೆ ಇದೆ. ಅದೇನೆಂದರೆ ಮನಸ್ಸು ಗಟ್ಟಿಯಾದಾಗ ಇಂದ್ರಿಯಗಳು ಸಡಿಲವಾಗುತ್ತವೆ. ರಾಗ ದ್ವೇಷ ಮಾಡಬಾರದು, ಕಾಮ ಕ್ರೋಧಗಳಿಗೆ ಒಳಗಾಗಬಾರದು, ಬಯಕೆಯ ಮೇಲೆ ಕಡಿವಾಣವಿರಬೇಕು ಎಂದು ಗಟ್ಟಿ ಮನಸ್ಸಿನಲ್ಲಿ ತೀರ್ಮಾನ ಮಾಡಿ ಕುಳಿತಾಗ, ಇಂದ್ರಿಯಗಳು ಮನಸ್ಸನ್ನು ಗೊಂದಲಗೊಳಿಸುತ್ತವೆ. ಶಾಸ್ತ್ರವನ್ನು ಓದಿ ಪರೋಕ್ಷವಾಗಿ ಸತ್ಯವನ್ನು ಕಂಡವನನ್ನೂ ಸಹ ಈ ಸಮಸ್ಯೆ ಕಾಡದೇ ಬಿಡದು. ಬಲಾತ್ಕಾರವಾಗಿ ಇಂದ್ರಿಯಗಳು ಮನಸ್ಸನ್ನು ದಾರಿ ತಪ್ಪಿಸುತ್ತವೆ. ಇದರಿಂದಾಗಿ ಮೊದಲು ನಂಬಿದ್ದನ್ನು ನಂಬಬೇಕೋ ಬಿಡಬೇಕೋ ಅನ್ನುವ ಸಂಶಯ ಹುಟ್ಟಿಕೊಳ್ಳುತ್ತದೆ. ಇದು ಪ್ರತಿಯೊಬ್ಬ ಸಾಧಕ ಜೀವನಿಗೆ ಅನುಭವಕ್ಕೆ ಬರುವ ಸಂಗತಿ. ಈ ಸಮಸ್ಯೆ ಗಂಭೀರವಾಗಿ ಕಂಡರೂ ಕೂಡಾ ಕೃಷ್ಣ ಮುಂದಿನ ಶ್ಲೋಕದಲ್ಲಿ ಇದಕ್ಕೆಸರಳ ಪರಿಹಾರ ಸೂಚಿಸುತ್ತಾನೆ.

ತಾನಿ ಸರ್ವಾಣಿ ಸಂಯಮ್ಯ ಯುಕ್ತ ಆಸೀತ ಮತ್ ಪರಃ ।
ವಶೇ ಹಿ ಯಸ್ಯೇಂದ್ರಿಯಾಣಿ ತಸ್ಯ ಪ್ರಜ್ಞಾ ಪ್ರತಿಷ್ಠಿತಾ ॥೬೧॥

ತಾನಿ ಸರ್ವಾಣಿ ಸಂಯಮ್ಯ ಯುಕ್ತಃ ಆಸೀತ ಮತ್ ಪರಃ ।
ವಶೇ ಹಿ ಯಸ್ಯ ಇಂದ್ರಿಯಾಣಿ ತಸ್ಯ ಪ್ರಜ್ಞಾ ಪ್ರತಿಷ್ಠಿತಾ--ಅವುಗಳನ್ನೆಲ್ಲಾ ತಡೆಹಿಡಿದು, ನನ್ನನ್ನೇ ಪರತತ್ವವೆಂದು ನಂಬಿ ನನ್ನಲ್ಲೇ ಮನವಿಟ್ಟು ಕೂಡಾಬೇಕು. ಹೀಗೆ ಇಂದ್ರಿಯಗಳನ್ನು ಗೆದ್ದವನ ಅರಿವು ಗಟ್ಟಿಗೊಂಡಿರುತ್ತದೆ.

ಇಂದ್ರಿಯಗಳಿಂದ ಮನಸ್ಸು ಕದಲುವುದು ಅಥವಾ ಮನಸ್ಸಿನಿಂದ ಇಂದ್ರಿಯ ಬೇಡದ ಕಾರ್ಯದಲ್ಲಿ ತೊಡಗುವುದು ಎಲ್ಲರನ್ನೂ ಕಾಡುವ ಸಮಸ್ಯೆ. ಈ ಸಮಸ್ಯೆಯಿಂದ ಈಚೆ ಬರಬೇಕಾದರೆ ನಾವು ಇಂದ್ರಿಯಗಳೆಂಬ ಕುದುರೆಗಳನ್ನು ಪಳಗಿಸಿ, ಮನಸ್ಸೆಂಬ ಕಡಿವಾಣದಲ್ಲಿ ಅವುಗಳನ್ನು ಬಿಗಿದು, ಅದು ಸಡಿಲವಾಗದಂತೆ ಹಿಡಿಯಬೇಕು. ಈ ಕಾರ್ಯವನ್ನು ಯಶಸ್ಸಾಗಿ ಮಾಡಬೇಕಾದರೆ ಮೊದಲು ನಾವು ಭಗವಂತನಲ್ಲಿ ಶರಣಾಗಬೇಕು. "ಈ ಜವಾಬ್ದಾರಿಯನ್ನು ನನಗೊಪ್ಪಿಸು" ಎನ್ನುತ್ತಾನೆ ಕೃಷ್ಣ. ಎಂತಹ ಭರವಸೆ? "ನನ್ನ ಇಂದ್ರಿಯಗಳು ದಾರಿತಪ್ಪದಂತೆ ನನ್ನೊಳಗಿದ್ದು ಪ್ರೇರೇಪಿಸು ಭಗವಂತ; ನಿನ್ನ ಚಿಂತನೆಯ ಶಕ್ತಿ ನಿರಂತರ ನನ್ನ ಮನಸ್ಸಿನಲ್ಲಿ ಉಳಿಯುವಂತೆ ಮಾಡು" ಎಂದು ಭಗವಂತನನ್ನು ಪ್ರಾರ್ಥಿಸಬೇಕು. ಭಗವಂತನಲ್ಲಿ ಶರಣಾಗತಿಯನ್ನು ಪಡೆಯದೇ ಎಲ್ಲವನ್ನೂ ಸ್ವಪ್ರಯತ್ನದಿಂದ ಮಾಡುತ್ತೇನೆ ಎಂದರೆ ಅದು ಅಸಾಧ್ಯ. ಪ್ರಯತ್ನ ಮಾಡಬೇಕು, ಪ್ರಯತ್ನದಲ್ಲಿ ಜಯ ದೊರೆಯುವಂತೆ ಭಗವಂತನಲ್ಲಿ ಬೇಡಿ, ಆತನಲ್ಲಿ ಶರಣಾದಾಗ, ಒಂದಲ್ಲ ಒಂದು ದಿನ ಅನುಭೂತಿಯ ಅನುಗ್ರಹವಾಗುತ್ತದೆ. ಆಗ ಸಂಪೂರ್ಣ ಇಂದ್ರಿಯ ನಿಗ್ರಹ ಸಾಧ್ಯ. ಈ ಸಾಧನೆ ಅನೇಕ ಜನ್ಮದ್ದು. ಹತ್ತು ದಿನ ಸಾಧನೆ ಮಾಡಿ ನಿರಾಶೆಯಾಗಿ ನಾಸ್ತಿಕನಾಗದೇ, ನಿರಂತರ ಸಾಧನೆ ಮಾಡಿದರೆ ಯಶಸ್ಸು ನಮ್ಮದಾಗುತ್ತದೆ. ಯಾರ ಇಂದ್ರಿಯಗಳು ಅವನ ವಶಕ್ಕೆ ಬಂದವೋ, ಅವನ ಅರಿವು ಗಟ್ಟಿಯಾಗುತ್ತದೆ. ಆತ ಜೀವನದಲ್ಲಿ, ಸಾಧನೆಯ ಹಾದಿಯಲ್ಲಿ ಗೆಲ್ಲುತ್ತಾನೆ.

ನಮ್ಮ ಅಧಃಪತನಕ್ಕೆ ನಮ್ಮ ಮನಸ್ಸು ಹೇಗೆ ಕಾರಣವಾಗುತ್ತದೆ ಎನ್ನುವುದನ್ನು ಕೃಷ್ಣ ಮುಂದಿನ ಎರಡು ಶ್ಲೋಕಗಳಲ್ಲಿ ವಿವರಿಸಿದ್ದಾನೆ. ಮನುಷ್ಯನ ಮನಸ್ಸು ಹೇಗೆ ಕೆಲಸ ಮಾಡುತ್ತದೆ ಎನ್ನುವ ಒಂದು ಅಪೂರ್ವ ಮಾನಸಿಕ ಚಿತ್ರಣ ಇಲ್ಲಿದೆ.

ಧ್ಯಾಯತೋ ವಿಷಯಾನ್ ಪುಂಸಃ ಸಂಗಸ್ತೇಷೂಪಜಾಯತೇ ।
ಸಂಗಾತ್ ಸಂಜಾಯತೇ ಕಾಮಃ ಕಾಮಾತ್ ಕ್ರೋಧೋऽಭಿಜಾಯತೇ ॥೬೨॥

ಧ್ಯಾಯತಃ ವಿಷಯಾನ್ ಪುಂಸಃ ಸಂಗಃ ತೇಷು ಉಪಜಾಯತೇ |
ಸಂಗಾತ್ ಸಂಜಾಯತೇ ಕಾಮಃ ಕಾಮಾತ್ ಕ್ರೋಧಃ ಅಭಿಜಾಯತೇ -- ವಿಷಯಗಳನ್ನೇ ನೆನೆಯುತ್ತಿರುವ ಮನುಷ್ಯನಿಗೆ ಅವುಗಳ ನಂಟು ಬೆಳೆಯುತ್ತದೆ. ನಂಟಿನಿಂದ ಆಸೆ ಕುದುರುತ್ತದೆ. ಆಸೆಗೆ ಅಡ್ಡಿಯಾದಾಗ ರೊಚ್ಚು ಮೂಡುತ್ತದೆ.

ಕ್ರೋಧಾದ್ ಭವತಿ ಸಮ್ಮೋಹಃ ಸಮ್ಮೋಹಾತ್ ಸ್ಮೃತಿವಿಭ್ರಮಃ ।
ಸ್ಮೃತಿಭ್ರಂಶಾದ್ ಬುದ್ಧಿನಾಶೋ ಬುದ್ಧಿನಾಶಾದ್ ವಿನಶ್ಯತಿ ॥೬೩॥

ಕ್ರೋಧಾತ್ ಭವತಿ ಸಮ್ಮೋಹಃ ಸಮ್ಮೋಹಾತ್ ಸ್ಮೃತಿ ವಿಭ್ರಮಃ |
ಸ್ಮೃತಿಭ್ರಂಶಾತ್ ಬುದ್ಧಿನಾಶಃ ಬುದ್ಧಿನಾಶಾತ್ ವಿನಶ್ಯತಿ --ರೊಚ್ಚಿನಿಂದ ಮಾಡಬಾರದ್ದನ್ನು ಮಾಡುವ ಬಯಕೆ (ತಪ್ಪು ಗ್ರಹಿಕೆ). ಅಂತಹ ಬಯಕೆಗಳಿಂದ ವಿಧಿ-ನಿಷೇಧಗಳ ಮರೆವು. ಮರೆವಿನಿಂದ ತಿಳಿಗೇಡಿತನ, ತಿಳಿಗೇಡಿತನದಿಂದ ಸರ್ವನಾಶ!

ಒಂದು ವಸ್ತುವಿನ ನಿರಂತರ ಸಂಪರ್ಕದಿಂದ ನಮಗೆ ಅದರ ಮೇಲೆ ಮೋಹ ಬೆಳೆಯುತ್ತದೆ. ಮೊದಲು ಪರಿಚಯ, ಪರಿಚಯದಿಂದ ಸ್ನೇಹ, ನಂತರ ಆ ಸ್ನೇಹವನ್ನು ಹಚ್ಚಿಕೊಳ್ಳುವುದು(Attachment). ನಂತರ ಅವರು ನನ್ನವರಾಗಬೇಕು ಎನ್ನುವ ಆಸೆ. ನಾವು ಆಸೆ ಪಟ್ಟಂತೆ ನೆರವೇರದಾಗ ಕ್ರೋಧ. ಈ ಕ್ರೋಧದ ಮೂಲ ಪ್ರೀತಿ! ಕೋಪಕ್ಕೆ ಮೂಲ ಕಾರಣ ಕಾಮನೆ. ನಮಗೆ ಕೋಪ ಬಾರದಂತೆ ತಡೆಯಬೇಕಾದರೆ ಮೊದಲು ಕಾಮನೆಯನ್ನು ತೊರೆಯಬೇಕು. ಆಸೆ ಕಡಿಮೆಯಾದಂತೆ ಸಿಟ್ಟು ಕಡಿಮೆಯಾಗುತ್ತದೆ. ಅಂಟಿಸಿಕೊಳ್ಳುವುದು ಅಥವಾ ಹಚ್ಚಿಕೊಳ್ಳುವುದರಿಂದ ಆಸೆ ಆಕಾಂಕ್ಷೆಗಳು ಬೆಳೆಯುತ್ತವೆ. ಅದು ಈಡೇರದಿದ್ದಾಗ ಕೋಪ. ಕೋಪದಿಂದ ಸಮ್ಮೋಹ. ಅಂದರೆ ಅಸಂಗತವಾದ ವಿಚಾರಗಳು ತಲೆಯಲ್ಲಿ ಬಂದು ಮಾಡಬಾರದ್ದನ್ನು ಮಾಡುವ ಬಯಕೆ. ಇದರಿಂದ ಯುಕ್ತಾಯುಕ್ತಗಳನ್ನು ವಿಶ್ಲೇಷಣೆ ಮಾಡುವ ಶಕ್ತಿ ಹೊರಟು ಹೋಗಿ, ತಪ್ಪನ್ನೇ ಸರಿ ಎಂದು ಸಮರ್ಥನೆ ಮಾಡುವ ಮಟ್ಟಕ್ಕೆ ನಾವು ಇಳಿಯುತ್ತೇವೆ. ಪಲಿತಾಂಶ: ಪ್ರತೀಕಾರ ಮಾಡಬೇಕು ಎನ್ನುವ ಹಠ. ಅದರಿಂದ ಪೂರ್ತಿ ತಿಳಿಗೇಡಿತನ ಮತ್ತು ಕೊನೆಗೆ ಆತ್ಮದ ಅಧಃಪತನ- ವಿನಾಶ-ಸರ್ವನಾಶ!

ಬುದ್ಧಿ ನಾಶವಾದಾಗ ಮನಸ್ಸು ಸತ್ತಂತೆ. ಅದರಿಂದ ಜೀವ ನರಕದ ದಾರಿಯಲ್ಲಿ ಹೋಗುವಂತಾಗುತ್ತದೆ. ಇದು ಅಧಃಪಾತದ ದಾರಿ. ನಾವು ಎತ್ತರಕ್ಕೇರಬೇಕೆಂದರೆ ಪರಮಾತ್ಮನ ಮಹತ್ವವನ್ನು ಅರಿತು ಅವನಿಗೆ ಶರಣಾಗಬೇಕು. ಒಳ್ಳೆಯ ದಾರಿಯಲ್ಲಿ ಮನಸ್ಸು ಚಿಂತನೆ ಮಾಡಿದಾಗ ಆತ್ಮ ಎತ್ತರಕ್ಕೇರಲು ಸಾಧ್ಯ. ಇದಕ್ಕೆ ಮೊದಲು ನಾವು ಹಚ್ಚಿಕೊಳ್ಳುವುದನ್ನು(Over attachment) ಕಡಿಮೆ ಮಾಡಬೇಕು. ಇದರರ್ಥ ಯಾರನ್ನೂ ಪ್ರೀತಿಸಬಾರದು, ಸ್ನೇಹ ಬೆಳೆಸಬಾರದು ಎಂದರ್ಥವಲ್ಲ. ಪ್ರೀತಿ ಇರಲಿ, ಸ್ನೇಹವಿರಲಿ, ಆದರೆ ಮೋಹ ಬೇಡ. ಬಂದಿದ್ದು ಬರಲಿ ಎನ್ನುವ ದೃಢ ನಿರ್ಧಾರವಿರಲಿ. ಹೀಗೇ ಆಗಬೇಕು-ಹಾಗೇ ಆಗಬೇಕು ಎನ್ನುವ ಅತಿಮೋಹ ದುಃಖಕ್ಕೆ ಕಾರಣ. ಎಲ್ಲವುದರ ಜೊತೆಗಿದ್ದು, ಎಲ್ಲರನ್ನೂ ಪ್ರೀತಿಸುವುದು-ಆದರೆ ಹಚ್ಚಿಕೊಳ್ಳದೇ ಇರುವುದು(Detached attachment). ಇದೇ ಸಾಧನೆಯ, ಸಂತೋಷದ ಮೂಲ ಮಂತ್ರ.

ಮನಸ್ಸು ಯಾವಾಗಲೂ ಪ್ರಸನ್ನವಾಗಿರಬೇಕು. ಪ್ರಸನ್ನತೆ ಇಲ್ಲದಿದ್ದಾಗ ಮಾನಸಿಕವಾಗಿ, ದೈಹಿಕವಾಗಿ ನಾವು ಆರೋಗ್ಯವನ್ನು ಕಳೆದುಕೊಳ್ಳುತ್ತೇವೆ. ಎಂತಹ ಪ್ರಸಂಗದಲ್ಲೂ ತಲೆ ಕೆಡಿಸಿಕೊಳ್ಳದೇ ಹಾಯಾಗಿರುವುದು ಪ್ರಸನ್ನತೆ. ಇದನ್ನು ಗಳಿಸುವುದು ಹೇಗೆ ಎನ್ನುವ ಚಿತ್ರಣ ಮುಂದಿನ ಶ್ಲೋಕ.

ರಾಗದ್ವೇಷವಿಮುಕ್ತೈಸ್ತು ವಿಷಯಾನಿಂದ್ರಿಯೈಶ್ಚರನ್ ।
ಆತ್ಮವಶ್ಯೈರ್ವಿಧೇಯಾತ್ಮಾ ಪ್ರಸಾದಮಧಿಗಚ್ಛತಿ ॥೬೪॥

ರಾಗ ದ್ವೇಷ ವಿಮುಕ್ತೈಃ ತು ವಿಷಯಾನ್ ಇಂದ್ರಿಯೈಃ ಚರನ್ ।
ಆತ್ಮವಶ್ಯೈಃ ವಿಧೇಯ ಆತ್ಮಾ ಪ್ರಸಾದಮ್ ಅಧಿಗಚ್ಛತಿ -- ಒಲವು ಹಗೆತನಗಳಿಂದ ಪಾರಾಗಿ ತನ್ನ ಹಿಡಿತದಲ್ಲಿರುವ ಇಂದ್ರಿಯಗಳಿಂದ ವಿಷಯಗಳನ್ನು ಅನುಭವಿಸುವಾಗಲೂ, ಅಂಕೆ ತಪ್ಪದವನ ಮನಸ್ಸು ತಿಳಿಗೊಳ್ಳುತ್ತದೆ.

ಇಂದ್ರಿಯ ನಿಗ್ರಹ ಅಥವಾ ಹಚ್ಚಿಕೊಳ್ಳದೇ ಇರುವುದು ಅಂದರೆ ಎಲ್ಲಾ ವಿಷಯ ಭೋಗಗಳನ್ನು ತೊರೆದು ಪ್ರಾಪಂಚಿಕ ವ್ಯವಹಾರದಿಂದ ದೂರಸರಿದು ಕಣ್ಮುಚ್ಚಿ ಕುಳಿತುಕೊಳ್ಳುವುದಲ್ಲ. ಇಂದ್ರಿಯದಿಂದ ವಿಷಯ ಗ್ರಹಿಸು, ಅದು ನಿರಂತರ. ಆದರೆ ಅದರಿಂದ ಪ್ರಭಾವಿತನಾಗಿ ಅದರ ದಾಸನಾಗಬೇಡ ಎನ್ನುತ್ತಾನೆ ಕೃಷ್ಣ. ವಿಷಯಗಳನ್ನು ಇಂದ್ರಿಯಗಳಿಂದ ಅನುಭವಿಸು, ಆದರೆ ವಿಷಯಗಳಿಗೆ ರಾಗ-ದ್ವೇಷಗಳ ಹವ್ಯಾಸವನ್ನು ಅಂಟಿಸಬೇಡ. ಏನು ಬಂತೋ ಹಾಗೇ ಅನುಭವಿಸು. ಇಂತಹ ಮನೋವೃತ್ತಿಯನ್ನು ಬೆಳೆಸಿಕೊಂಡಾಗ ಇಂದ್ರಿಯ ಯಾವ ವಿಷಯವನ್ನು ಗ್ರಹಿಸಿದರೂ ಅಪಾಯವಿಲ್ಲ. ತಟಸ್ಥ ಮನಸ್ಸಿನಿಂದ ಯಾವುದೇ ವಿಷಯ ಕೇಳುವುದರಿಂದ, ನೋಡುವುದರಿಂದ ಯಾವ ಅಪಾಯವೂ ಇಲ್ಲ. ಇಲ್ಲಿ ತಟಸ್ಥ ಮನಸ್ಸು ಅನ್ನುವುದಕ್ಕೆ ಉದಾಹರಣೆ ಎಂದರೆ, ಕೆಲವೊಮ್ಮೆ, ನಾವು ನಮ್ಮ ಸ್ನೇಹಿತರನ್ನು ದಾರಿ ಮಧ್ಯದಲ್ಲಿ ಭೇಟಿಯಾಗುತ್ತೇವೆ. ನಾವು ಅಲ್ಲಿ ಕುಳಿತು ಸಂಭಾಷಣೆ ಮಾಡುತ್ತೇವೆ. ಆದರೆ ನಂತರ ಯಾರಾದರೂ ಬಂದು ನಿನ್ನ ಸ್ನೇಹಿತ ಯಾವ ಬಣ್ಣದ ಬಟ್ಟೆ ಧರಿಸಿದ್ದ ಎಂದು ಕೇಳಿದರೆ ನಮಗೆ ಗೊತ್ತಿರುವುದಿಲ್ಲ. ನಾವು ನೋಡಿರುತ್ತೇವೆ, ಆದರೆ ಗಮನಿಸಿರುವುದಿಲ್ಲ. ಏಕೆಂದರೆ ಅದರ ಅಗತ್ಯವಿರುವುದಿಲ್ಲ. ಇದೇ ರೀತಿ ಮನಸ್ಸನ್ನು ತಟಸ್ಥವಾಗಿಟ್ಟು ಯಾವ ವಿಷಯ ಗ್ರಹಿಸಿದರೂ ಅಪಾಯವಿಲ್ಲ. ಇದರಿಂದ ಇಂದ್ರಿಯಗಳು ಅಧೀನವಾಗಿರುತ್ತವೆ. ಮನಸ್ಸು ವಿಧೇಯವಾಗಿರುತ್ತದೆ. ಒಳಗಿನಿಂದ ನಿರ್ಲಿಪ್ತತೆಯನ್ನು ಬೆಳೆಸಿಕೊಂಡಾಗ ಎಲ್ಲರ ಜೊತೆಗಿದ್ದು ಏಕಾಂತತೆಯನ್ನು ಗಳಿಸಬಹುದು. ಎಲ್ಲರ ಜೊತೆ

ಬೆರೆತು ಬೇರೆಯಾಗಿರಬಹುದು. ಅಂತರಂಗದ ಪ್ರಪಂಚದಲ್ಲಿ ಬೇರೆಯಾಗಿರುವ ಸ್ಥಿತಿ ಇದು. ಈ ರೀತಿ ಬದುಕಲು ಕಲಿತಾಗ ಮನಸ್ಸು ತಿಳಿಗೊಳ್ಳುತ್ತದೆ. ಯಾವಾಗಲೂ ಸಂತೋಷ ಉಕ್ಕಿ ಹೊರಬರುತ್ತಿರುತ್ತದೆ. ಸಾಧನೆ ಸುಗಮವಾಗುತ್ತದೆ.

ಪ್ರಸಾದೇ ಸರ್ವದುಃಖಾನಾಂ ಹಾನಿರಸ್ಯೋಪಜಾಯತೇ ।
ಪ್ರಸನ್ನಚೇತಸೋ ಹ್ಯಾಶು ಬುದ್ಧಿಃ ಪರ್ಯವತಿಷ್ಠತಿ ॥೬೫॥

ಪ್ರಸಾದೇ ಸರ್ವ ದುಃಖಾನಾಮ್ ಹಾನಿಃ ಅಸ್ಯ ಉಪಜಾಯತೇ ।
ಪ್ರಸನ್ನಚೇತಸಃ ಹಿ ಆಶು ಬುದ್ಧಿಃ ಪರಿ ಅವತಿಷ್ಠತಿ--ಮನಸ್ಸು ತಿಳಿಗೊಂಡಾಗ ಸಾಧಕನ ಎಲ್ಲಾ ದುಗುಡಗಳು ಇಲ್ಲವಾಗುತ್ತವೆ. ಏಕೆಂದರೆ ಬಗೆ ತಿಳಿಗೊಂಡವನ ಬುದ್ಧಿ ಬೇಗನೆ ಭಗವಂತನಲ್ಲಿ ನೆಲೆಗೊಳ್ಳುತ್ತದೆ.

ಮನಸ್ಸು ಕೊಳೆಯಾದರೆ ಎಲ್ಲವೂ ಕೊಳೆ. ಮನಸ್ಸು ತಿಳಿಯಾದರೆ ಎಲ್ಲವೂ ತಿಳಿ. ಎಲ್ಲಾ ಸಮಸ್ಯೆ ಇರುವುದು ಮನಸ್ಸು ಕೊಳೆಯಾಗುವುದರಿಂದ. ನಮಗೆ ನಮ್ಮ ಮನಸ್ಸಿನ ಸ್ವಚ್ಛತೆ ಬಗ್ಗೆ ಗಮನ ಇಲ್ಲದಿದ್ದರೆ ಇತರ ಎಲ್ಲಾ ಕಾರ್ಯವೂ ವ್ಯರ್ಥ. ಮನಸ್ಸು ಸ್ವಚ್ಛವಾದರೆ ಮಡಿ. ಅದೇ ಪ್ರಸನ್ನವಾದ ಸ್ಥಿತಿ. ಮನಸ್ಸು ತಿಳಿಯಾದಾಗ ಸರ್ವ ದುಃಖವೂ ತನ್ನಷ್ಟಕ್ಕೆ ತಾನೇ ಕಣ್ಮರೆಯಾಗುತ್ತದೆ. ಇದು ದುಃಖಾತೀತ ಆನಂದ ಸ್ಥಿತಿ.
ಮನಸ್ಸು ತಿಳಿಯಾಯಿತು ಎಂದರೆ ಅದು ಭಗವಂತನನ್ನು ತಿಳಿಯಲು ಸಹಾಯ ಮಾಡುತ್ತದೆ. ಕೊಳೆಯಾದ ಮನಸ್ಸಿನಿಂದ ಭಗವಂತನ ಚಿಂತನೆ ಸಾಧ್ಯವಿಲ್ಲ. ಭಗವಂತನನ್ನು ತಿಳಿದ ಮೇಲೆ ದುಃಖವಿಲ್ಲ. ಬುದ್ಧಿ-ಗಟ್ಟಿಗೊಂಡು ಭಗವಂತನ ಅಪರೋಕ್ಷ ಜ್ಞಾನದಲ್ಲಿ ನಿಂತುಬಿಡುತ್ತದೆ. ಈ ಸ್ಥಿತಿಯಲ್ಲಿ, ಯಾವ ದೆಸೆಯಲ್ಲಿ ಯೋಚನೆ ಹೋದರೂ ಕೂಡಾ ಅದು ಭಗವಂತನಲ್ಲಿ ಹೋಗಿ ನಿಲ್ಲುತ್ತದೆ. ಯಾವುದನ್ನು ಕೇಳಿದರೂ, ಯಾವುದನ್ನು ನೋಡಿದರೂ, ಅದರ ಹಿಂದೆ ಇರುವ ಜಗತ್ತಿನ ಮೂಲ ಶಕ್ತಿಯ ಚಿಂತನೆ ಮನಸ್ಸಿಗೆ ಬಂದುಬಿಡುತ್ತದೆ. ಆಗ ಯಾವುದೋ ಸಣ್ಣ ಸಂಗತಿಗಾಗಿ ಕೊರಗುವ ಪ್ರಶ್ನೆಯೇ ಉಳಿಯುವುದಿಲ್ಲ. ತಿಳಿಯಾದ ಮನಸ್ಸು ಭಗವನ್ಮಯವಾಗುತ್ತದೆ. ಒಮ್ಮೆ ಭಗವಂತ ಮನಸ್ಸಿನಲ್ಲಿ ತುಂಬಿದ ಎಂದರೆ ಸರ್ವವೂ ಆನಂದಮಯ. ಆನಂತರ ದುಃಖವೆಂಬುವುದಿಲ್ಲ. ಈ ಆನಂದ ಅಪರಿಮಿತ.

ನಾಸ್ತಿ ಬುದ್ಧಿರಯುಕ್ತಸ್ಯ ನಚಾಯುಕ್ತಸ್ಯ ಭಾವನಾ ।
ನ ಚಾಭಾವಯತಃ ಶಾಂತಿರಶಾಂತಸ್ಯ ಕುತಃ ಸುಖಮ್ ॥೬೬॥

ನ ಅಸ್ತಿ ಬುದ್ಧಿಃ ಅಯುಕ್ತಸ್ಯ ನ ಚ ಅಯುಕ್ತಸ್ಯ ಭಾವನಾ ।

ನ ಚ ಅಭಾವಯತಃ ಶಾಂತಿಃ ಅಶಾಂತಸ್ಯ ಕುತಃ ಸುಖಮ್--ಮನಸ್ಸು ಮಣಿಸದವನಿಗೆ ತಿಳಿಯಾದ ತಿಳಿವಿಲ್ಲ. ಮನಸ್ಸು ಮಣಿಸದವನಿಗೆ ಧ್ಯಾನವೂ ಇಲ್ಲ. ಧ್ಯಾನ ಇರದವನಿಗೆ ಮುಕ್ತಿಯಿಲ್ಲ[ಭಗವಂತನಲ್ಲಿ ಬಗೆ ನೆಲೆಸದು]. ಮುಕ್ತನಾಗದವನಿಗೆ[ಭಗವಂತನಲ್ಲಿ ಬಗೆ ನೆಡದವನಿಗೆ] ಎಲ್ಲಿಯ ಸುಖ ?

ಸುಖ ಬೇಕಿದ್ದರೆ ಶಾಂತಿ ಬೇಕು. ಮನಸ್ಸು ಪ್ರಸನ್ನವಾಗದೆ ವಿಕ್ಷಿಪ್ತವಾಗಿದ್ದರೆ ಅದು ಭಗವಂತನನ್ನು ಹೋಗಿ ಸೇರುವುದಿಲ್ಲ. ಯಾರ ಮನಸ್ಸು ಭಗವಂತನಲ್ಲಿ ಸಂಯೋಗ ಹೊಂದುವುದಿಲ್ಲವೋ ಅವನಿಗೆ ಅಪರೋಕ್ಷವಿಲ್ಲ. ಅಂತವನ ಮನಸ್ಸು ತಿಳಿಯಾಗದು. ಇಂತವರು ಏಕಾಗ್ರವಾಗಿ ಚಿಂತಿಸಲು ಸಾಧ್ಯವಿಲ್ಲ. ಏಕಾಗ್ರವಾಗಿ ಚಿಂತಿಸದ ಹೊರತು ಯಥಾರ್ಥ ಜ್ಞಾನವಿಲ್ಲ. ಇಂಥವರಿಗೆ ಧ್ಯಾನ(Meditation) ಅಸಾಧ್ಯ. ಇಲ್ಲಿ ಧ್ಯಾನ ಅಂದರೆ ಏಕಾಗ್ರವಾಗಿ ಒಂದು ವಸ್ತುವಿನ ಬಗ್ಗೆ ಚಿಂತಿಸುವುದು. ಯಾವುದೇ ಒಂದು ವಸ್ತುವಿನ ಬಗ್ಗೆ ನಮಗೆ ಖಚಿತವಾದ ಅರಿವು ಬರಬೇಕಾದರೆ ನಮಗೆ ಏಕಾಗ್ರತೆ ಬೇಕು. ಅದನ್ನೇ ಇಲ್ಲಿ 'ಭಾವನಾ' ಎಂದಿದ್ದಾರೆ. ಮನಸ್ಸು ಏಕಾಗ್ರವಾದರೆ ಮಾತ್ರ ಆಳವಾದ ಚಿಂತನೆ ಸಾಧ್ಯ. ಯಾವುದನ್ನೂ ಆಳವಾಗಿ ಚಿಂತಿಸದ ಹೊರತು ಅದರ ಬಗ್ಗೆ, ಅದರ ವೈಶಾಲ್ಯತೆ ಬಗ್ಗೆ ಅರಿವು ಮೂಡದು. ಹೀಗೆ ಆಳಕ್ಕಿಳಿದು ಚಿಂತನೆ ಮಾಡದವನಿಗೆ ಶಾಂತಿ ಇಲ್ಲ. ಇಲ್ಲಿ ಶಾಂತಿ ಎನ್ನುವುದಕ್ಕೆ ಎರಡು ಅರ್ಥವಿದೆ. ಮೇಲ್ನೋಟಕ್ಕೆ ಶಾಂತಿ ಅಂದರೆ ಆನಂದಮಯವಾದ ಸ್ಥಿತಿ. ಶಾಸ್ತ್ರಕಾರರ ಪ್ರಕಾರ ಜೀವನಿಗೆ ಪೂರ್ಣ ಆನಂದದ ಸ್ಥಿತಿ ಅಂದರೆ ಮೋಕ್ಷ. ಆದ್ದರಿಂದ ಯಾರು ಧ್ಯಾನದಿಂದ ಭಗವಂತನನ್ನು ಕಂಡುಕೊಳ್ಳುವುದಿಲ್ಲವೋ ಅವನಿಗೆ ಮೋಕ್ಷವಿಲ್ಲ. ಮೋಕ್ಷದ ದಾರಿಯಲ್ಲಿ ಸಾಗದವನಿಗೆ ಸುಖವಿಲ್ಲ. ಇನ್ನು ಶಾಂತಿ ಎಂದರೆ ಆನಂದದ ತುತ್ತತುದಿ ಅಥವಾ ಪರಾಕಾಷ್ಠೆ. ಮನಸ್ಸು ಭಗವಂತನಲ್ಲಿ ನೆಲೆಗೊಂಡಾಗ ನಮಗೆ ಶಾಂತಿ.

ಹೀಗೆ ಇಂದ್ರಿಯಗಳನ್ನು ಸಂಯಮ ಮಾಡಿಕೊಂಡು, ಮನಸ್ಸನ್ನು ಏಕಾಗ್ರಗೊಳಿಸಿ, ಅದರಲ್ಲಿ ಆಳವಾಗಿ ಚಿಂತನೆ ಮಾಡಿ, ಸತ್ಯವನ್ನು ಕಂಡುಕೊಳ್ಳಬೇಕು. ನಾವು ಹೊರ ಪ್ರಪಂಚವನ್ನು ಬಿಟ್ಟು ಒಳ ಪ್ರಪಂಚದಲ್ಲಿ ಆಳವಾಗಿ ಮುಳುಗದ ಹೊರತು, ಸತ್ಯದ ಸಾಕ್ಷಾತ್ಕಾರವಾಗದು. ಸತ್ಯದ ಸಾಕ್ಷಾತ್ಕಾರವಾಗದ ಹೊರತು ಸುಖವಿಲ್ಲ.

ಇಂದ್ರಿಯಾಣಾಂ ಹಿ ಚರತಾಂ ಯನ್ಮನೋಽನುವಿಧೀಯತೇ ।
ತದಸ್ಯ ಹರತಿ ಪ್ರಜ್ಞಾಂ ವಾಯುರ್ನಾವಮಿವಾಂಭಸಿ ॥೬೭॥

ಇಂದ್ರಿಯಾಣಾಂ ಹಿ ಚರತಾಮ್ ಯತ್ ಮನಃ ಅನುವಿಧೀಯತೇ ।
ತತ್ ಅಸ್ಯ ಹರತಿ ಪ್ರಜ್ಞಾಮ್ ವಾಯುಃ ನಾವಮ್ ಇವ ಅಂಭಸಿ--ವಿಷಯಗಳತ್ತ ಹರಿಯುವ ಇಂದ್ರಿಯಗಳ ಬೆನ್ನು ಹತ್ತುವಂತೆ ಮನಸ್ಸು ರೂಪುಗೊಂಡಿದೆಯಲ್ಲವೇ? ಆದ್ದರಿಂದ, ಅದು ಸಾಧಕನ ಅರಿವನ್ನು ದಾರಿಗೆಡಿಸಿಬಿಡುತ್ತದೆ- ಕಡಲಲ್ಲಿ ಬಿರುಗಾಳಿ ಹಡಗನ್ನು ಹೇಗೆ ದಾರಿ ತಪ್ಪಿಸುತ್ತದೋ ಹಾಗೆ.

ಇಷ್ಟೆಲ್ಲಾ ಗಹನವಾದ ವಿಚಾರ ಇದ್ದರೂ ಕೂಡಾ, ಮನಸ್ಸು ಏಕೆ ಅಂತರಂಗದ ಆಳಕ್ಕಿಳಿಯುವುದಿಲ್ಲ? ಅದು ಸಹಜ ಎನ್ನುತ್ತಾನೆ ಕೃಷ್ಣ. ಏಕೆಂದರೆ ಮನಸ್ಸಿಗೆ ಒಂದು ಸ್ವಭಾವವಿದೆ. ಯಾವುದನ್ನು ನಾವು ಅದಕ್ಕೆ ಅಭ್ಯಾಸ

ಮಾಡಿದೆವೋ ಅದನ್ನೇ ಆದು ಮೆಚ್ಚಿಕೊಳ್ಳುವುದು. ಹೊಸದನ್ನು ಅದು ನಿರಾಕರಿಸುತ್ತದೆ ಹಾಗೂ ಪರಿಚಿತವಾದುದನ್ನು ಮಾತ್ರ ಅದು ಇಷ್ಟಪಡುತ್ತದೆ. ಮನಸ್ಸಿಗೆ ಒಳಪ್ರಪಂಚ ಅಪರಿಚಿತ. ಆದ್ದರಿಂದ ಅದು ಒಳಪ್ರಪಂಚದತ್ತ ಹರಿಯುವುದಿಲ್ಲ. ಮನಸ್ಸಿಗೆ ಗಟ್ಟಿಯಾಗಿ ಹೇಳಿದರೆ ಅದು ಅಂತರ್ಮುಖವಾಗುತ್ತದೆ; ಆದರೆ ಆ ಪ್ರಯತ್ನ ನಾವು ಮಾಡುವುದಿಲ್ಲ! ಈ ಅಪಾಯವನ್ನು ಈ ಶ್ಲೋಕದಲ್ಲಿ ಕೃಷ್ಣ ವಿವರಿಸಿದ್ದಾನೆ.

ಮನಸ್ಸಿಗೆ ನಾವು ಬಾಲ್ಯದಿಂದ ಏನನ್ನು ಅಭ್ಯಾಸ ಮಾಡಿಸಿದ್ದೆವೋ ಅದರ ಹಿಂದೆ ಅದು ಹೋಗುತ್ತದೆ. ಉದಾಹರಣೆಗೆ ಬಾಲ್ಯದಿಂದಲೂ ಶಾಖಾಹಾರಿಯಾಗಿದ್ದವನಿಗೆ ಮಾಂಸವನ್ನು ಕಂಡಾಗ ಅಸಹ್ಯ ಎನಿಸುತ್ತದೆ. ಆದರೆ ಅದೇ ಮಾಂಸ ಮಾರುವವ ಮಾಂಸದ ಮಧ್ಯದಲ್ಲೇ ಇದ್ದು ಅದನ್ನೇ ಬೇಯಿಸಿ ತಿಂದರೂ ಅವನಿಗೆ ಹೇಸಿಕೆ ಅನಿಸುವುದಿಲ್ಲ. ಇದೆಲ್ಲವೂ ಮನಸ್ಸಿಗೆ ನಾವು ಕೊಡುವ ತರಬೇತಿ. ಮನಸ್ಸು ನಿರಂತರ ಯಾವುದನ್ನು ನೋಡುತ್ತದೋ ಅದನ್ನೇ ರೂಢಿ ಮಾಡಿಕೊಳ್ಳುತ್ತದೆ. ಆ ರೀತಿ ಮನಸ್ಸು ಭಗವಂತನಿಂದ ನಿರ್ಮಿಸಲ್ಪಟ್ಟಿದೆ. ಇಂದ್ರಿಯಗಳು ನಿತ್ಯ ಯಾವುದನ್ನು ನೋಡುತ್ತವೋ ಅದನ್ನು ಮೆಚ್ಚುವಂತಹ ಸ್ವಭಾವವನ್ನು ಭಗವಂತ ಮನಸ್ಸಿಗೆ ಕೊಟ್ಟಿದ್ದಾನೆ. ಇಂತಹ ಮನಸ್ಸಿನ ಸ್ವಭಾವವನ್ನು ಅರಿಯದಿದ್ದರೆ ಅಪಾಯಕಾರಿ. ಅದು ನಮ್ಮ ಪ್ರಜ್ಞೆಯನ್ನು ಅಪಹಾರ ಮಾಡಿಬಿಡುತ್ತದೆ. ಇದನ್ನು ಒಂದು ಒಳ್ಳೆಯ ದೃಷ್ಟಾಂತದ ಮುಖೇನ ಕೃಷ್ಣ ವಿವರಿಸಿದ್ದಾನೆ:

ನಾವು ಹಾಯಿ ದೋಣಿಯಲ್ಲಿ ಪ್ರಯಾಣಿಸುವ ನಾವಿಕನಂತೆ. ನಮ್ಮ ಮನಸ್ಸು ಆ ದೋಣಿಗೆ ಕಟ್ಟಿದ ಬಟ್ಟೆ. ಒಂದು ವೇಳೆ ನಮಗೆ ಈ ಬಟ್ಟೆಯನ್ನು ತಿರುಗಿಸಿ ನಮಗೆ ಬೇಕಾದಂತೆ ದೋಣಿಯನ್ನು ನಿಯಂತ್ರಿಸುವ ಕಲೆ ಗೊತ್ತಿಲ್ಲದಿದ್ದರೆ, ಗಾಳಿ ಬೀಸಿದತ್ತ ನಾವು ಹೋಗುತ್ತೇವೆಯೇ ಹೊರತು ನಮಗೆ ತಲುಪಬೇಕಾದಲ್ಲಿಗಲ್ಲ. ಈ ದೃಷ್ಟಾಂತ ತುಂಬಾ ಔಚಿತ್ಯಪೂರ್ಣವಾಗಿದೆ. ಒಂದು ವೇಳೆ ನಾವು ನಮ್ಮ ಮನಸ್ಸನ್ನು ನಿಯಂತ್ರಿಸುವ ಕಲೆಯನ್ನು ಕಲಿಯದಿದ್ದರೆ ಬದುಕು ಛಿದ್ರ-ವಿಛಿದ್ರವಾಗುತ್ತದೆ. ಬಿರುಗಾಳಿಗೆ ಸಿಕ್ಕ ತರಗೆಲೆಯಂತಾಗುತ್ತದೆ ಎನ್ನುವ ಎಚ್ಚರವನ್ನು ಕೃಷ್ಣ ಇಲ್ಲಿ ಕೊಟ್ಟಿದ್ದಾನೆ.

ತಸ್ಮಾದ್ ಯಸ್ಯ ಮಹಾಬಾಹೋ ನಿಗೃಹೀತಾನಿ ಸರ್ವಶಃ ।
ಇಂದ್ರಿಯಾಣೀಂದ್ರಿಯಾರ್ಥೇಭ್ಯಸ್ತಸ್ಯ ಪ್ರಜ್ಞಾ ಪ್ರತಿಷ್ಠಿತಾ ॥೬೮॥

ತಸ್ಮಾತ್ ಯಸ್ಯ ಮಹಾಬಾಹೋ ನಿಗೃಹೀತಾನಿ ಸರ್ವಶಃ |
ಇಂದ್ರಿಯಾಣಿ ಇಂದ್ರಿಯಾರ್ಥೇಭ್ಯಃ ತಸ್ಯ ಪ್ರಜ್ಞಾ ಪ್ರತಿಷ್ಠಿತಾ-ಆದ್ದರಿಂದ ಓ ಮಹಾವೀರಾ, ಯಾರ ಇಂದ್ರಿಯಗಳು ಎಲ್ಲಾ ಬಗೆಯಿಂದಲೂ ಇಂದ್ರಿಯ ವಿಷಯಗಳಿಂದ ಪಾರಾಗಿ ಹಿಡಿತದಲ್ಲಿರುವವೋ ಅವನ ಅರಿವು ಗಟ್ಟಿಗೊಂಡಿರುತ್ತದೆ.

ಕೃಷ್ಣ ಹೇಳುತ್ತಾನೆ, ಮನಸ್ಸು ಯಾವಾಗಲೂ ಹೊರಗಿನ ಇಂದ್ರಿಯಗಳು ಏನನ್ನು ಅಭ್ಯಾಸ ಮಾಡಿದವೋ ಅದರ ಹಿಂದೆಯೇ ಹೋಗುತ್ತದೆ. ಇಂದ್ರಿಯಗಳನ್ನು ನಿಯಂತ್ರಿಸದೆ ಮನಸ್ಸನ್ನು ನಿಯಂತ್ರಿಸುವುದು ಕಷ್ಟ. ಆದ್ದರಿಂದ ಮೊದಲು ನಾವು ಇಂದ್ರಿಯಗಳಿಗೆ ತರಬೇತಿ ಕೊಡಬೇಕು. ಇದಕ್ಕಾಗಿ ಚಿಕ್ಕ ಮಕ್ಕಳಿಗೆ ಉತ್ತಮ ಸಂಸ್ಕಾರ ಕಲಿಸುವುದು ಅತಿ ಮುಖ್ಯ. ಚಿಕ್ಕಂದಿನಿಂದಲೂ ಪಾಲಿಸಿಕೊಂಡು ಬಂದ ಅಭ್ಯಾಸವನ್ನು ಮುರಿಯುವುದು

ಅಸಾಧ್ಯ. ಈ ಕಾರಣಕ್ಕಾಗಿ ಹಿಂದೆ ಶಾಲೆಯಲ್ಲಿ ಹಾಗೂ ಮನೆಯಲ್ಲಿ ಅನೇಕ ಸಂಸ್ಕಾರಗಳನ್ನು ರೂಢಿ ಮಾಡಿಕೊಂಡು ಮಕ್ಕಳಿಗೆ ತರಬೇತಿ ಕೊಡುತ್ತಿದ್ದರು. ಆದರೆ ಇಂದು ಶಾಲೆಯಲ್ಲಾಗಲೀ, ಮನೆಯಲ್ಲಾಗಲೀ ಇಂತಹ ಮಾರ್ಗದರ್ಶನ ಮಕ್ಕಳಿಗೆ ಸಿಗದೇ, ಇಂದಿನ ಯುವ ಪೀಳಿಗೆ ಬಿರುಗಾಳಿಗೆ ಸಿಕ್ಕ ದೋಣಿಯಂತಾಗಿದೆ.
ಇಂದ್ರಿಯ ನಿಗ್ರಹ ಮಾಡಲು ಪೂರಕವಾದ ಸಂಸ್ಕಾರ ಬಾಲ್ಯದಿಂದ ಬಂದರೆ ಇಂದ್ರಿಯಗಳು ಮನಸ್ಸನ್ನು ದಾರಿ ತಪ್ಪಿಸುವ ಪರಿಸ್ಥಿತಿ ಬಂದೊದಗುವುದಿಲ್ಲ. ಇದರಿಂದ ಮನಸ್ಸು ಗಟ್ಟಿಯಾಗುತ್ತದೆ. ಏಕಾಗ್ರತೆ ಸಾಧ್ಯವಾಗುತ್ತದೆ. ಏಕಾಗ್ರತೆ ಬಂದಾಗ ಅರಿವು ಗಟ್ಟಿಗೊಳ್ಳುತ್ತದೆ.
ಮನಸ್ಸನ್ನು ನಿಗ್ರಹ ಮಾಡುವುದು ಹೇಗೆ, ನಿಗ್ರಹ ಮಾಡಿದಂತಹ ಮನಸ್ಸು ಯಾವ ರೀತಿ ವರ್ತಿಸುತ್ತದೆ, ಅಂತಹ ಮನಃಸ್ಥಿತಿಯವರು ಹೇಗೆ ಜ್ಞಾನಿಗಳಾಗಲು ಸಾಧ್ಯ- ಅನ್ನುವ ಒಂದು ವಿಸ್ತಾರವಾದ ಮನೋವಿಶ್ಲೇಷಣೆಯನ್ನು ಕೃಷ್ಣ ಮಾಡಿದ. ಅರ್ಜುನ ಹಾಕಿದ ಮೂಲ ಪ್ರಶ್ನೆಗೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರಿಸುತ್ತಾನೆ. ಒಬ್ಬ ಸ್ಥಿತಪ್ರಜ್ಞ ಹೇಗಿರುತ್ತಾನೆ, ಆತನ ನಡೆ ನುಡಿ ಹೇಗಿರುತ್ತದೆ ಎನ್ನುವ ಪ್ರಶ್ನೆಗೆ ಮಹತ್ತರವಾದ ಉತ್ತರವನ್ನು ಕೃಷ್ಣ ಇಲ್ಲಿ ಕೊಟ್ಟಿದ್ದಾನೆ.

ಯಾ ನಿಶಾ ಸರ್ವಭೂತಾನಾಂ ತಸ್ಯಾಂ ಜಾಗರ್ತಿ ಸಂಯಮೀ।
ಯಸ್ಯಾಂ ಜಾಗ್ರತಿ ಭೂತಾನಿ ಸಾ ನಿಶಾ ಪಶ್ಯತೋ ಮುನೇಃ ॥೬೯॥

ಯಾ ನಿಶಾ ಸರ್ವ ಭೂತಾನಾಂ ತಸ್ಯಾಮ್ ಜಾಗರ್ತಿ ಸಂಯಮೀ ।
ಯಸ್ಯಾಮ್ ಜಾಗ್ರತಿ ಭೂತಾನಿ ಸಾ ನಿಶಾ ಪಶ್ಯತಃ ಮುನೇಃ -- ಯಾವುದು ಎಲ್ಲಾ ಜೀವಿಗಳಿಗೆ ಕತ್ತಲ ಕಗ್ಗಂಟೋ ಅಂಥಲ್ಲಿ ಇಂದ್ರಿಯಗಳನ್ನು ಗೆದ್ದ ಯೋಗಿ ಎಚ್ಚರವಿರುತ್ತಾನೆ. ಎಲ್ಲಾ ಜೀವಿಗಳು ಎಲ್ಲಿ ಎಚ್ಚರವಿರುವರೋ-ಅದು ಬಲ್ಲ ಚಿಂತಕನಿಗೆ ನಟ್ಟಿರುಳು.

ಸಾಮಾನ್ಯ ಮನುಷ್ಯನಿಗೆ ಯಾವುದು ಹಗಲೋ ಅದು ಸತ್ಯದ ಸಾಕ್ಷಾತ್ಕಾರವಾದವನಿಗೆ ರಾತ್ರಿ. ಜಗತ್ತಿನ ಎಲ್ಲಾ ಜೀವ ಜಾತಕ್ಕೆ ಯಾವುದು ರಾತ್ರಿಯೋ ಅದು ಸಾಧಕನಿಗೆ ಹಗಲು. ಅಂದರೆ ನಿಜವಾದ ಸಾಧಕ ನಮ್ಮ ರಾತ್ರಿಯಲ್ಲಿ ಎಚ್ಚರವಿರುತ್ತಾನೆ, ಹಾಗೂ ಲೌಕಿಕ ವ್ಯವಹಾರವೆಂಬ ನಮ್ಮ ಹಗಲು ಅವನಿಗೆ ರಾತ್ರಿ. ಲೌಕಿಕ ಪ್ರಪಂಚದಲ್ಲಿ ಅವನಿಗೆ ಪ್ರವೃತ್ತಿಯೇ ಇರುವುದಿಲ್ಲ. ಆತ ನಮಗೆ ಒಬ್ಬ ಮುಗ್ಧನಂತೆ, ಮಗುವಂತೆ ಕಾಣಬಹುದು. ಆತನ ಜ್ಞಾನದ ಬಗ್ಗೆ ಅರಿವಿಲ್ಲದವನಿಗೆ ಆತನೊಬ್ಬ ಹುಚ್ಚನಂತೆ ಕಂಡರೆ ಆಶ್ಚರ್ಯವಿಲ್ಲ! ಏಕೆಂದರೆ ಆತ ಲೌಕಿಕ ಪ್ರಪಂಚದೊಂದಿಗಿದ್ದು, ಅದರೊಂದಿಗೆ ಬೆರೆಯದೇ ತನ್ನ ಅಂತರಂಗದ ಆನಂದವನ್ನು ಸದಾ ಸವಿಯುತ್ತಿರುತ್ತಾನೆ. ಒಬ್ಬ ಜ್ಞಾನಿ ಭಗವಂತನನ್ನು ಕಂಡಾಗ ಆತನಿಗೆ ಉಳಿದದ್ದೆಲ್ಲಾ ಕತ್ತಲು. ಅದ್ಭುತವಾದ ಸಂಗತಿಯನ್ನು ಕಂಡ ವಿಸ್ಮಯದಲ್ಲಿ ತದೇಕಚಿತ್ತನಾಗಿ ಅದನ್ನೇ ನೋಡುತ್ತಿರುತ್ತಾನೆ. ಭಗವಂತನನ್ನು ಕಾಣಬೇಕಾದರೆ ನಾವು ಸದಾ ಶಾಸ್ತ್ರದ ಶ್ರವಣ ಮಾಡಬೇಕು. ಕೇವಲ ಶ್ರವಣ ಮಾಡಿದರೆ ಸಾಲದು, ಶ್ರವಣದ ನಂತರ ಮನನ-ನಿಧಿಧ್ಯಾಸನ ಅತಿ ಮುಖ್ಯ. ಇದನ್ನೇ "ಆತ್ಮಾ ವಾ ಅರೇ ದ್ರಷ್ಟವ್ಯಃ ಶ್ರೋತವ್ಯಃ ಮಂತವ್ಯಃ ನಿಧಿಧ್ಯಾಸಿತವ್ಯಃ ಚ" ಎಂದಿದ್ದಾರೆ. ಮನನ ಶೀಲನಾದವ 'ಮುನಿ' ; ಅವನೇ 'ಪಶ್ಯ' ಅಂದರೆ ಭಗವಂತನನ್ನು ಕಾಣಬಲ್ಲವ ಅಥವಾ ಕಂಡವ.

ಇಂದಿನ ಸಮಾಜದಲ್ಲಿ ಸತ್ಯದ ಸಾಕ್ಷಾತ್ಕಾರನಾದವನನ್ನು ಗುರುತಿಸುವುದು ಬಹಳ ಕಷ್ಟ. ಸಿದ್ಧ ಪುರುಷರೆಲ್ಲಾ ಸತ್ಯವನ್ನು ಕಂಡವರಲ್ಲ! ಪವಾಡ ಮಾಡುವವರು ಭಗವಂತನನ್ನು ಕಂಡವರು ಎಂದು ಹೇಳಲಾಗುವುದಿಲ್ಲ. ಏಕೆಂದರೆ ನಿಜವಾದ ಸಾಧಕ ಸಾಮಾನ್ಯವಾಗಿ ಪವಾಡ ಮಾಡುವುದಿಲ್ಲ. ತೀರಾ ಅನಿವಾರ್ಯವಾದಾಗ ಮಾತ್ರ ಆತ ಪ್ರಪಂಚದ ಒಳಿತಿಗಾಗಿ ಪವಾಡ ಮಾಡಬಹುದು. ನಿರಂತರ ಸತ್ಯದ ಬಗ್ಗೆ ಅನ್ವೇಷಣೆ ಮಾಡಿ, ಸಿದ್ಧಿ ಗಳಿಸಿದರೆ ಮಾತ್ರ ಸ್ಥಿತಪ್ರಜ್ಞರಾಗಲು ಸಾಧ್ಯ.

ಆಪೂರ್ಯಮಾಣಮಚಲಪ್ರತಿಷ್ಠಂ ಸಮುದ್ರಮಾಪಃ ಪ್ರವಿಶಂತಿ ಯದ್ವತ್ ।
ತದ್ವತ್ ಕಾಮಾ ಯಂ ಪ್ರವಿಶಂತಿ ಸರ್ವೇ ಸ ಶಾಂತಿಮಾಪ್ನೋತಿ ನ ಕಾಮಕಾಮೀ ॥೭೦॥

ಆಪೂರ್ಯಮಾಣಮ್ ಅಚಲಪ್ರತಿಷ್ಠಮ್ ಸಮುದ್ರಮ್ ಅಪಃ ಪ್ರವಿಶಂತಿ ಯದ್ವತ್ ।
ತದ್ವತ್ ಕಾಮಾಃ ಯಮ್ ಪ್ರವಿಶಂತಿ ಸರ್ವೇ ಸಃ ಶಾಂತಿಮ್ ಅಪ್ನೋತಿ ನ ಕಾಮಕಾಮೀ--ತುಂಬಿದರೂ ತುಳುಕದೇ ನಿಂತ ಕಡಲನ್ನು ಎಲ್ಲಾ ನೀರುಗಳು ಬಂದು ಸೇರುವಂತೆ, ಯಾರನ್ನು ಎಲ್ಲಾ ವಿಷಯಗಳು ತುಂಬಿಯೂ ತುಳುಕದಂತೆ ಬಂದು ಸೇರುವವೋ ಅವನು ಮುಕ್ತಿ ಪಡೆಯುತ್ತಾನೆ. ಹೊರತು ಕೆಟ್ಟ ಬಯಕೆಗಳ ಬೆನ್ನು ಹತ್ತಿದವನಲ್ಲ.

ಭಗವಂತನನ್ನು ಕಂಡವನು, ಸತ್ಯದ ಸಾಕ್ಷಾತ್ಕಾರವಾದವನು. ಭಗವಂತನನ್ನು ಕಾಣುವ ಸರಿ ದಾರಿಯಲ್ಲಿ ನಡೆಯುವವನು ಹೇಗಿರುತ್ತಾನೆ ಎನ್ನುವ ವಿಷಯದ ಮೇಲೆ ಕೃಷ್ಣ ಇಲ್ಲಿ ಇನ್ನಷ್ಟು ವಿವರಣೆಯನ್ನು ಕೊಟ್ಟಿದ್ದಾನೆ: ಆತನ ಮನಸ್ಸು ಸದಾ ಆನಂದವಾಗಿರುತ್ತದೆ. ಅದು ಭಗವಂತನಲ್ಲಿ ನೆಲೆಗೊಂಡಿರುತ್ತದೆ. ಆತ ಕಿರು ತೊರೆಗಳಂತೆ ಇರದೆ, ಕಡಲಿನಂತಿರುತ್ತಾನೆ. ಸಮುದ್ರಕ್ಕೆ ಎಲ್ಲಾ ನದಿಗಳು ಬಂದು ಸೇರಿದರೂ ಅದು ಉಕ್ಕೇರುವುದಿಲ್ಲ. ಕಡಲು ಮಳೆ ಬಂದಾಗ ಉಕ್ಕಿ ಹರಿದು- ಬೇಸಿಗೆ ಬಂದಾಗ ಬತ್ತಿ ಹೋಗುವುದಿಲ್ಲ. ಅದೇ ರೀತಿ ಸಾಧಕ. ಪ್ರಪಂಚದ ಎಲ್ಲಾ ಭೋಗಗಳು ಅವನನ್ನು ಪ್ರವೇಶಿಸಿದರೂ ಕೂಡಾ, ಆತ ವಿಚಲಿತನಾಗದೇ ಸುಖ-ದುಃಖವನ್ನು ಮೀರಿ ನಿಲ್ಲುತ್ತಾನೆ. ಆತನ ಮನಸ್ಸು ಸದಾ ಪ್ರಸನ್ನವಾಗಿರುತ್ತದೆ. ಆತ ಭಗವಂತನಲ್ಲಿ ನಿಷ್ಠೆಯನ್ನಿಟ್ಟು ಮೋಕ್ಷವನ್ನು ಪಡೆಯುತ್ತಾನೆ. ಆದರೆ ಬಯಕೆಗಳ ಬೆನ್ನು ಹತ್ತಿದವನು ಅದರಿಂದ ಈಚೆ ಬಾರದೆ ಎಂದೂ ನಿಜವಾದ ಸುಖ ಕಾಣಲಾರ.

ವಿಹಾಯ ಕಾಮಾನ್ ಯಃ ಸರ್ವಾನ್ ಪುಮಾಂಶ್ಚರತಿ ನಿಸ್ಪೃಹಃ ।
ನಿರ್ಮಮೋ ನಿರಹಂಕಾರಃ ಸ ಶಾಂತಿಮಧಿಗಚ್ಛತಿ ॥೭೧॥

ವಿಹಾಯ ಕಾಮಾನ್ ಯಃ ಸರ್ವಾನ್ ಪುಮಾನ್ ಚರತಿ ನಿಸ್ಪೃಹಃ ।
ನಿರ್ಮಮಃ ನಿರಹಂಕಾರಃ ಸಃ ಶಾಂತಿಮ್ ಅಧಿಗಚ್ಛತಿ--ಯಾರು ಎಲ್ಲಾ ವಿಷಯಗಳನ್ನು ಮನಸೋಲದೇ, ಕೆಟ್ಟ ಆಸೆಗೆ ಬಲಿ ಬೀಳದೇ, ನಾನು ನನ್ನದು ಎಂಬ ಹಮ್ಮು ತೊರೆದು ಅನುಭವಿಸುತ್ತಾನೊ-ಅವನು ಮುಕ್ತಿ ಪಡೆಯುತ್ತಾನೆ.

ಯಾರು ಭೋಗದ ಬಯಕೆಯನ್ನು ಬಿಟ್ಟು ಬಂದದ್ದನ್ನು ಸಂತೋಷವಾಗಿ ಅನುಭವಿಸುತ್ತಾನೋ, ಅವನು ನಿಜವಾದ ಸಾಧಕನೆನಿಸುತ್ತಾನೆ. ಸೀಮಿತವಾದ ಆಹಾರ, ನಿದ್ದೆ ಮತ್ತು ಮೈಥುನವನ್ನು ಅಭ್ಯಾಸ ಮಾಡಿಕೊಂಡು, ನಿರ್ಭಯವಾಗಿ ಸಂಪೂರ್ಣ ಭಗವಂತನ ರಕ್ಷಾ ಕವಚದ ಜ್ಞಾನದಲ್ಲಿದ್ದು, ಆಸೆ ಆಕಾಂಕ್ಷೆಗಳಿಗೆ ಬಲಿ ಬೀಳದೆ, ಯಾವುದೇ ಏರು-ಪೇರುಗಳಿಗೆ ವಿಚಲಿತನಾಗದೇ ಬದುಕುತ್ತಾನೆ. ಅವನು ನಿಜವಾದ 'ಮನುಷ್ಯ'ನೆನಿಸುತ್ತಾನೆ. ಇಂತವನಿಗೆ ನಾನು-ನನ್ನದು ಎನ್ನುವ ಅಹಮ್ ಎಂದೂ ಇರುವುದಿಲ್ಲ ಹಾಗೂ ಆತ ಮುಕ್ತಿಯನ್ನು ಪಡೆಯುತ್ತಾನೆ.

ಏಷಾ ಬ್ರಾಹ್ಮೀ ಸ್ಥಿತಿಃ ಪಾರ್ಥ ನೈನಾಂ ಪ್ರಾಪ್ಯ ವಿಮುಹ್ಯತಿ ।
ಸ್ಥಿತ್ವಾSಸ್ಯಾಮಂತಕಾಲೇSಪಿ ಬ್ರಹ್ಮ ನಿರ್ಬಾಣಮೃಚ್ಛತಿ ॥೭೨॥

ಏಷಾ ಬ್ರಾಹ್ಮೀ ಸ್ಥಿತಿಃ ಪಾರ್ಥ ನ ಏನಾಮ್ ಪ್ರಾಪ್ಯ ವಿಮುಹ್ಯತಿ ।
ಸ್ಥಿತ್ವಾ ಅಸ್ಯಾಮ್ ಅಂತಕಾಲೇ ಅಪಿ ಬ್ರಹ್ಮನಿರ್ಬಾಣಮ್ ಋಚ್ಛತಿ- - ಪಾರ್ಥಾ, ಇದು ಬ್ರಹ್ಮ ಜ್ಞಾನಿಯ ಗುರುತು. ಇದನ್ನು ಪಡೆದು ಮತ್ತೆ ಮೈಮರೆಯುವುದಿಲ್ಲ. ಕೊನೆಯ ಕಾಲದಲ್ಲೂ ಈ ನೆಲೆಯಲ್ಲಿ ನಿಂತವನು ಕಾಯದಿಂದಲೂ ಸಾಯದ ಪರತತ್ವವನ್ನು ಸೇರುತ್ತಾನೆ.

ಭಗವಂತನಲ್ಲಿ ನೆಲೆಗೊಳ್ಳತಕ್ಕಂತವನ ಲಕ್ಷಣ ಬ್ರಾಹ್ಮೀ ಸ್ಥಿತಿ. ಈವರೆಗೆ ಹೇಳಿರುವುದು ಒಬ್ಬ ಬ್ರಹ್ಮ ಜ್ಞಾನಿಯ ಲಕ್ಷಣ. ಬ್ರಹ್ಮನಲ್ಲಿ ಸ್ಥಿತನಾದ ಬ್ರಹ್ಮ ಪ್ರಜ್ಞೆ ಜಾಗೃತನಾದವನ ಲಕ್ಷಣ. ಇಂತಹ ಬ್ರಹ್ಮಜ್ಞಾನಿಯನ್ನು ಆತನ ಬಾಹ್ಯ ಕ್ರಿಯೆಯಿಂದಾಗಲೀ, ವೇಷ ಭೂಷಣದಿಂದಾಗಲೀ ಗುರುತಿಸಲಾಗದು. ಆತನ ಮಾನಸಿಕ ಸ್ಥಿತಿ ಆತನ ಸ್ಥಾನವನ್ನು ತಿಳಿಸುತ್ತದೆ.
ತನ್ನ ಸಾವಿನ ಕೊನೇ ಕ್ಷಣದಲ್ಲೂ ಕೂಡಾ ಭಗವಂತನ ಪ್ರಜ್ಞೆ ಜಾಗೃತವಾಗಿದ್ದರೆ ಆತ ನೇರ ಮರು ಹುಟ್ಟಿಲ್ಲದ ಮೋಕ್ಷವನ್ನು ಸೇರುತ್ತಾನೆ.

ಇತಿ ದ್ವಿತೀಯೋSಧ್ಯಾಯಃ
ಎರಡನೇಯ ಅಧ್ಯಾಯ ಮುಗಿಯಿತು



# ಅಧ್ಯಾಯ ಮೂರು

ಎರಡನೇ ಅಧ್ಯಾಯದಲ್ಲಿ ಭಗವಂತನ ಅರಿವು, ಆ ಅರಿವನ್ನು ಪಡೆಯುವ ಉಪಾಯವನ್ನು ಕೃಷ್ಣ ವಿವರಿಸಿದ. ಈ ಉಪದೇಶದಲ್ಲಿ ಒಂದು ಕಡೆ ಜ್ಞಾನ ಎಲ್ಲವುದಕ್ಕಿಂತ ಶ್ರೇಷ್ಠ, ಜ್ಞಾನದ ಮುಂದೆ ಕರ್ಮ ಏನೂ ಅಲ್ಲ ಎನ್ನುತ್ತಾನೆ ಕೃಷ್ಣ. ಇನ್ನೊಂದು ಕಡೆ ಅರ್ಜುನನಲ್ಲಿ ತಾಮಸಿಕವಾದ ಯುದ್ಧವನ್ನು ಮಾಡು ಎನ್ನುತ್ತಾನೆ! ಜ್ಞಾನವೇ ಅತ್ಯಂತ ಶ್ರೇಷ್ಠವಾದರೆ ಏಕೆ ಬೇಕು ಈ ತಾಮಸಿಕವಾದ ರಾಗ-ದ್ವೇಷವಿರುವ ಯುದ್ಧ? ಮೂರನೇ ಅಧ್ಯಾಯ ಅರ್ಜುನನ ಈ ಪ್ರಶ್ನೆಯೊಂದಿಗೆ ಪ್ರಾರಂಭವಾಗುತ್ತದೆ.

ಅರ್ಜುನ ಉವಾಚ ।
ಜ್ಯಾಯಸೀ ಚೇತ್ ಕರ್ಮಣಸ್ತೇ ಮತಾ ಬುದ್ಧಿರ್ಜನಾರ್ದನ ।
ತತ್ ಕಿಂ ಕರ್ಮಣಿ ಘೋರೇ ಮಾಂ ನಿಯೋಜಯಸಿ ಕೇಶವ ॥೧॥

ಅರ್ಜುನಃ ಉವಾಚ- ಅರ್ಜುನ ಹೇಳಿದನು:
ಜ್ಯಾಯಸೀ ಚೇತ್ ಕರ್ಮಣಃ ತೇ ಮತಾ ಬುದ್ಧಿಃ ಜನಾರ್ದನ ।
ತತ್ ಕಿಂ ಕರ್ಮಣಿ ಘೋರೇ ಮಾಮ್ ನಿಯೋಜಯಸಿ ಕೇಶವ - ಓ ಜನಾರ್ದನಾ, ಕಾಯಕಕ್ಕಿಂತ ಅರಿವೇ ಹಿರಿದು ಎಂದು ನಿನ್ನ ಆಶಯವಾದರೆ, ಮತ್ತೇಕೆ ನನ್ನನ್ನು ಈ ಕೊಲ್ಲುವ ಕಾಯಕದಲ್ಲಿ ತೊಡಗಿಸುತ್ತಿರುವೆ ಕೇಶವಾ?

ಕೃಷ್ಣ ಜ್ಞಾನ ಮತ್ತು ಕರ್ಮದ ಬಗ್ಗೆ ಕೊಟ್ಟ ವಿವರಣೆಯಿಂದ ಅರ್ಜುನನಿಗೆ ಗೊಂದಲವಾಗುತ್ತದೆ. ತನಗೆ ಯಾವ ಮಾರ್ಗ ಉಚಿತ ಎನ್ನುವ ಪ್ರಶ್ನೆ ಆತನನ್ನು ಕಾಡುತ್ತದೆ. ಕೃಷ್ಣ ಒಮ್ಮೆ ಜ್ಞಾನ ಮಾರ್ಗದಲ್ಲಿ ಸಾಗು-ಅದು ಶ್ರೇಷ್ಠ ಎನ್ನುತ್ತಾನೆ; ಇನ್ನೊಮ್ಮೆ ಯುದ್ಧ ಮಾಡು ಅನ್ನುತ್ತಾನೆ! ತಾನೇಕೆ ಶ್ರೇಷ್ಠವಾದ ಜ್ಞಾನ ಮಾರ್ಗದಲ್ಲಿ ಸಾಗಬಾರದು, ಯುದ್ಧವನ್ನೇಕೆ ಮಾಡಬೇಕು ಎನ್ನುವ ಗೊಂದಲ ಅರ್ಜುನನದು. ಈ ಗೊಂದಲದಲ್ಲಿ ಅರ್ಜುನ ಕೃಷ್ಣನಲ್ಲಿ ಕೇಳುತ್ತಾನೆ: "ಓ ಜನಾರ್ದನಾ, ಕರ್ಮಕ್ಕಿಂತ ಜ್ಞಾನ ಮಾರ್ಗ ಶ್ರೇಷ್ಠ ಎನ್ನುವುದು ನಿನ್ನ ಅಭಿಮತವಾದರೆ, ನನ್ನ ಹತ್ತಿರ ಕರ್ಮ ಮಾಡು ಎಂದು ಏಕೆ ಹೇಳುತ್ತಿದ್ದೀಯ? ಯುದ್ಧ ಎನ್ನುವುದು ಘೋರ ರಾಗ-ದ್ವೇಷಗಳಿಂದ ತುಂಬಿದ ತಾಮಸಕಾರ್ಯ. ಅದು ಅಧ್ಯಾತ್ಮ ಸಾಧನೆಗೆ ತೀರಾ ವಿರುದ್ಧವಾದ ಕರ್ಮ. ಹೀಗಿರುವಾಗ ನನ್ನನ್ನೇಕೆ ಈ ಕಾರ್ಯದಲ್ಲಿ ತೊಡಗಿಸುತ್ತಿರುವೆ ಕೇಶವ?" ಎಂದು.

ಈ ಶ್ಲೋಕದಲ್ಲಿ ಅರ್ಜುನ ಶ್ರೀಕೃಷ್ಣನನ್ನು 'ಜನಾರ್ದನ' ಮತ್ತು 'ಕೇಶವ' ಎನ್ನುವ ಎರಡು ವಿಶೇಷ ನಾಮದಿಂದ ಸಂಬೋಧಿಸಿರುವುದನ್ನು ಕಾಣುತ್ತೇವೆ. ಇಲ್ಲಿ-ಪ್ರಶ್ನೆ ಮಾಡುತ್ತಿರುವ ಅರ್ಜುನನ ಭಾವ ಅಡಗಿದೆ. ಜನ+ಅರ್ದನ ಅಂದರೆ ಜನರನ್ನು ನಾಶ ಮಾಡುವವ! ಇಲ್ಲಿ ಜನ ಅಂದರೆ ದುರ್ಜನ. ಜನಾರ್ದನ ಅಂದರೆ ದುರ್ಜನ ನಾಶಕ. "ದುಷ್ಟ ನಿಗ್ರಹಕ್ಕಾಗಿ ಅವತರಿಸಿದ ನೀನು, ನನ್ನಿಂದ ಈ ಕಾರ್ಯವನ್ನು ಮಾಡಿಸುತ್ತಿದ್ದೀಯ. ಆದರೆ ಇಲ್ಲಿ ಸೇರಿರುವರೆಲ್ಲಾ ದುರ್ಜನರಲ್ಲ. ಹೀಗಿರುವಾಗ ಅವರನ್ನು ಕೊಲ್ಲುವ ಕರ್ಮ ಶ್ರೇಷ್ಠ ಹೇಗಾದೀತು? ಜನನ

ಮುಕ್ತಗೊಳಿಸಿ ಮೋಕ್ಷವನ್ನು ಕರುಣಿಸುವ ನೀನು, ನನ್ನಿಂದ ಗುರು ಹಿರಿಯರನ್ನು ಕೊಲ್ಲುವ ಈ ಘೋರ ಕರ್ಮವನ್ನು ಏಕೆ ಮಾಡಿಸುತ್ತಿರುವೆ?". ಎನ್ನುವುದು ಅರ್ಜುನನ ಪ್ರಶ್ನೆ. ಶ್ಲೋಕದ ಕೊನೆಯಲ್ಲಿ 'ಕೇಶವ' ಎನ್ನುವ ನಾಮವಿಶೇಷಣ ಅರ್ಜುನನ ಶರಣಾಗತಿಯನ್ನು ಸೂಚಿಸುತ್ತದೆ. ಕಾ+ಈಶ+ವ-ಕೇಶವ; ಇಲ್ಲಿ 'ಕಾ' ಎಂದರೆ ಸೃಷ್ಟಿಗೆ ಕಾರಣವಾಗಿರುವ ಚತುರ್ಮುಖ ಬ್ರಹ್ಮ ; ಈಶ ಎಂದರೆ ಸಂಹಾರಕ್ಕೆ ಕಾರಣವಾಗಿರುವ ಶಂಕರ. ಕೇಶವ ಅಂದರೆ ಸೃಷ್ಟಿ-ಸಂಹಾರಕ್ಕೆ ಕಾರಣವಾಗಿರುವ ಬ್ರಹ್ಮಶಕ್ತಿ ಮತ್ತು ಶಿವಶಕ್ತಿಯನ್ನೊಳಗೊಂಡ ಪರಶಕ್ತಿ. "ಸೃಷ್ಠಿ-ಸ್ಥಿತಿ-ಸಂಹಾರ-ಮೋಕ್ಷಗಳಿಗೆ ಕಾರಣನಾದ ನೀನು ನನ್ನನ್ನು ಈ ಗೊಂದಲದಿಂದ ಪಾರು ಮಾಡು" ಎಂದು ಅರ್ಜುನ ಶ್ರೀಕೃಷ್ಣನಲ್ಲಿ ಶರಣಾಗಿ ಬೇಡುತ್ತಾನೆ.

ವ್ಯಾಮಿಶ್ರೇಣ್ಯೇವ ವಾಕ್ಯೇನ ಬುದ್ಧಿಂ ಮೋಹಯಸೀವ ಮೇ ।
ತದೇಕಂ ವದ ನಿಶ್ಚಿತ್ಯ ಯೇನ ಶ್ರೇಯೋಹಮಾಪ್ನುಯಾಮ್ ॥೨॥

ವ್ಯಾಮಿಶ್ರೇಣ ಇವ ವಾಕ್ಯೇನ ಬುದ್ಧಿಮ್ ಮೋಹಯಸಿ ಇವ ಮೇ ।
ತತ್ ಏಕಮ್ ವದ ನಿಶ್ಚಿತ್ಯ ಯೇನ ಶ್ರೇಯಃ ಅಹಮ್ ಅಪ್ನುಯಾಮ್-ಇಬ್ಬಗೆಯ ಮಾತಿನಿಂದ ನನ್ನ ನಿರ್ಧಾರಶಕ್ತಿಯನ್ನು ಗೊಂದಲಕ್ಕೀಡುಮಾಡುವಂತಿದೆ. ಆದ್ದರಿಂದ, ಒಂದನ್ನು ನಿರ್ಧರಿಸಿ ಹೇಳು: ಯಾವುದರಿಂದ ನಾನು ಒಳಿತನ್ನು ಪಡೆದೇನು?

ಇಲ್ಲಿ 'ವ್ಯಾಮಿಶ್ರೇಣ' ಎಂದರೆ ವಿರೋಧಾಭಾಸ(Contradicting/ Confusing). "ಈ ರೀತಿ ಇಬ್ಬಗೆಯ ಮಾತಿನಿಂದ ನನಗೆ ಯಾವುದು ಸರಿ-ಯಾವುದು ತಪ್ಪು ಎನ್ನುವ ತೀರ್ಮಾನ ಬರುತ್ತಿಲ್ಲ, ಹಾಗೂ ಅದನ್ನು ತಿಳಿಯುವ ಶಕ್ತಿ ನನ್ನಲ್ಲಿಲ್ಲ. ನಿನ್ನ ಅಭಿಪ್ರಾಯವನ್ನು ನಾನು ಗ್ರಹಿಸಲಾರೆ. ಯಾವ ದಾರಿಯಲ್ಲಿ ನಡೆದರೆ ನಾನು ಶ್ರೇಯಸ್ಸನ್ನು ಪಡೆದೇನು? ನನ್ನ ಬದುಕು ಸಾರ್ಥಕವಾಗುವ ನಿಶ್ಚಿತ ದಾರಿಯನ್ನು ಹೇಳು" ಎಂದು ಕೃಷ್ಣನಲ್ಲಿ ಅರ್ಜುನ ಕೇಳಿಕೊಳ್ಳುತ್ತಾನೆ.

ಭಗವಾನುವಾಚ ।
ಲೋಕೇಸ್ಮಿನ್ ದ್ವಿವಿದಾ ನಿಷ್ಠಾ ಪುರಾ ಪ್ರೋಕ್ತಾ ಮಯಾನಘ ।
ಜ್ಞಾನಯೋಗೇನ ಸಾಂಖ್ಯಾನಾಂ ಕರ್ಮಯೋಗೇನ ಯೋಗಿನಾಮ್ ॥೩॥

ಭಗವಾನುವಾಚ-ಭಗವಂತ ನುಡಿದನು:
ಲೋಕೇ ಅಸ್ಮಿನ್ ದ್ವಿ ವಿಧಾ ನಿಷ್ಠಾ ಪುರಾ ಪ್ರೋಕ್ತಾ ಮಯಾ ಅನಘ ।
ಜ್ಞಾನಯೋಗೇನ ಸಾಂಖ್ಯಾನಾಮ್ ಕರ್ಮಯೋಗೇನ ಯೋಗಿನಾಮ್--ಓ ಅನಘಾ, ಈ ಲೋಕದಲ್ಲಿ ಎರಡು ಬಗೆಯ ಇರವನ್ನು (ಮುಕ್ತಿಯನ್ನು) ನಾನು ಹಿಂದೆ ಹೇಳಿರುವೆ: ಜ್ಞಾನಮಾರ್ಗಿಗಳಿಗೆ ಜ್ಞಾನ ಪ್ರಧಾನವಾದ ಸಾಧನೆಯಿಂದ; ಕರ್ಮಮಾರ್ಗಿಗಳಿಗೆ ಕರ್ಮಪ್ರಧಾನವಾದ ಸಾಧನೆಯಿಂದ.

ಈ ಹಿಂದೆ ಜ್ಞಾನಮಾರ್ಗ ಮತ್ತು ಕರ್ಮಮಾರ್ಗದ ಬಗ್ಗೆ ಹೇಳಿದ್ದ ಕೃಷ್ಣ, ಯಾವ ನೆಲೆಯಲ್ಲಿ ಯಾವ ಸ್ತರದಲ್ಲಿ ಯಾವುದು ಮುಖ್ಯ ಎನ್ನುವ ವಿಚಾರವನ್ನು ಇಲ್ಲಿ ವಿವರಿಸುತ್ತಾನೆ. ಕರ್ಮಯೋಗದ ಬಗ್ಗೆ ವಿಶೇಷ ವಿವರಣೆ ಇಲ್ಲಿಂದ ಆರಂಭವಾಗುತ್ತದೆ.

ಈ ಶ್ಲೋಕದಲ್ಲಿ 'ನಿಷ್ಠಾ' ಎನ್ನುವ ಪದ ಬಳಕೆಯಾಗಿದೆ. ಇಲ್ಲಿ 'ನಿಷ್ಠಾ' ಎಂದರೆ ಜೀವನದ ನಡೆ ಅಥವಾ ಕೊನೇಯ ಸ್ಥಿತಿ-ಅದೇ 'ಮೋಕ್ಷ'. ಕೃಷ್ಣ ಹೇಳುತ್ತಾನೆ: "ಸಾಧಕರಲ್ಲಿ ಎರಡು ವಿಧ -ಸಾಂಖ್ಯರು ಮತ್ತು ಯೋಗಿಗಳು" ಎಂದು. ಇಲ್ಲಿ ಸಾಂಖ್ಯರು ಎಂದರೆ ಜ್ಞಾನಮಾರ್ಗದಲ್ಲಿ ಸಾಧನೆ ಮಾಡುವವರು. ಯೋಗಿಗಳು ಎಂದರೆ ಕರ್ಮಸಾಧನೆಯ ಮೂಲಕ ಸಾಧನೆ ಮಾಡುವವರು.

ಈ ಶ್ಲೋಕವನ್ನು ಮೇಲ್ನೋಟದಲ್ಲಿ ನೋಡಿದರೆ: "ಜ್ಞಾನದ ಸಾಧಕರು ಜ್ಞಾನ ಮಾರ್ಗದಲ್ಲಿ ಹೋಗಬೇಕು, ಕರ್ಮದ ಮೂಲಕ ಸಾಧನೆ ಮಾಡುವವರು ಕರ್ಮದ ದಾರಿಯಲ್ಲಿ ಹೋಗಬೇಕು" ಎಂದು ಹೇಳಿದಂತೆ ಕಾಣಿಸುತ್ತದೆ. ಇಲ್ಲಿ ಅರ್ಜುನ ಕರ್ಮದ ಮೂಲಕ ಸಾಧನೆ ಮಾಡಬೇಕಾದವ, ಆದ್ದರಿಂದ ಕೃಷ್ಣ ಆತನಲ್ಲಿ ಯುದ್ಧ ಮಾಡು ಎಂದು ಹೇಳಿದ ಎನ್ನುವಂತೆ ಕಾಣುತ್ತದೆ. ಆದರೆ ಅದು ನಿಜವಾದ ಅರ್ಥವಲ್ಲ. ನಿಮಗೆ ತಿಳಿದಂತೆ ಅರ್ಜುನ ಆ ಕಾಲದ ಮಹಾಜ್ಞಾನಿಗಳಲ್ಲಿ ಒಬ್ಬ. ಹಾಗಿರುವಾಗ ನಾವು ಈ ರೀತಿ ಮೇಲ್ನೋಟದ ಅರ್ಥವನ್ನು ಈ ಶ್ಲೋಕಕ್ಕೆ ಅರ್ಥೈಸಬಾರದು. ಇಲ್ಲಿ ಆಳವಾದ ಚಿಂತನೆ ಅಗತ್ಯ.

ಶಾಸ್ತ್ರಗಳಲ್ಲಿ ಹೇಳುವಂತೆ ಜ್ಞಾನದಿಂದ ಮಾತ್ರ ಮೋಕ್ಷಕ್ಕೆ ಹೋಗಲು ಸಾಧ್ಯ. ಮೋಕ್ಷಕ್ಕೆ ಬೇರೆ ಮಾರ್ಗವೇ ಇಲ್ಲ. ಅಂದಮೇಲೆ ಮೋಕ್ಷ ಸಾಧನೆಗೆ ಜ್ಞಾನ ಬೇಕೇಬೇಕು. ಕರ್ಮವಿರುವುದು ಜ್ಞಾನಕ್ಕಾಗಿ. ಜ್ಞಾನಕ್ಕೆ ಪೂರಕವಲ್ಲದ ಕರ್ಮ-ಕರ್ಮವಲ್ಲ. ಬೆಳಗಿನಿಂದ ಸಂಜೆಯ ತನಕ ಜಪ ಮಣಿ ಹಿಡಿದು ಮಡಿ-ಮಡಿ ಎಂದು ಕುಳಿತರೆ ಅದು ನಮ್ಮನ್ನು ಎತ್ತರಕ್ಕೆ ಕೊಂಡೊಯ್ಯಲಾರದು. ನಾವು ಏನೇ ಕರ್ಮ ಮಾಡುವುದಿದ್ದರೂ ಅದನ್ನು ತಿಳಿದು ಮಾಡಬೇಕು. ಮಾಡುವ ಕರ್ಮ ಜ್ಞಾನಕ್ಕೆ ಪೂರಕವಾಗಿರಬೇಕು. ಆದ್ದರಿಂದ ಬರೀ ಜ್ಞಾನಯೋಗವೆಂದಾಗಲೀ, ಬರೀ ಕರ್ಮಯೋಗವೆಂದಾಗಲೀ ಇಲ್ಲ. ಕರ್ಮವಿಲ್ಲದೆ ಜ್ಞಾನವಿಲ್ಲ, ಜ್ಞಾನವಿಲ್ಲದೆ ಕರ್ಮವಿಲ್ಲ. ಛಾಂದೊಗ್ಯ ಉಪನಿಷತ್ತಿನಲ್ಲಿ ಹೇಳುವಂತೆ: "ಯದೇವ ವಿದ್ಯಯಾ ಕರೋತಿ ಶ್ರದ್ಧೆಯ ಉಪನಿಷದಾ, ತದೇವ ವೀರ್ಯವತ್ತರಂ ಭವತಿ , ವಿಜ್ಞಾನಂ ಯಜ್ಞಾಂ ತನುತೇ". ಅಂದರೆ "ನೀನು ಏನುನ್ನು ಮಾಡಿದರೂ ತಿಳಿದು ಮಾಡು. ಜ್ಞಾನ ಪೂರ್ವಕವಾಗಿ ಮಾಡಿದ ಕರ್ಮ ಸಫಲ. ಇಲ್ಲದಿದ್ದರೆ ಅದು ವ್ಯರ್ಥ". ಮಾಡುವ ಕರ್ಮವನ್ನು ಏತಕ್ಕಾಗಿ ಮಾಡುತ್ತಿದ್ದೇವೆ, ಮಾಡುವುದರ ಫಲವೇನು, ಮಾಡುವುದು ಹೇಗೆ-ಎನ್ನುವುದು ಗೊತ್ತಿರಬೇಕು. ಅಜ್ಞಾನದಿಂದ ಮಾಡುವ ಕರ್ಮ ವ್ಯರ್ಥವಾಗುತ್ತದೆ. ಇಲ್ಲಿ ಕೃಷ್ಣ ಹೇಳಿರುವುದು ಒಂದು ಕರ್ಮಪ್ರದವಾದ ಮಾರ್ಗ(ಜನಕಾದಿಗಳಂತೆ) ಹಾಗೂ ಇನ್ನೊಂದು ಜ್ಞಾನಪ್ರದವಾದ ಮಾರ್ಗ(ಸನಕಾದಿಗಳಂತೆ).

ನ ಕರ್ಮಣಾಮನಾರಂಭಾನ್ನೈಷ್ಕರ್ಮ್ಯಂ ಪುರುಷೋಶ್ನುತೇ ।
ನಚ ಸಂನ್ಯಸನಾದೇವ ಸಿದ್ಧಿಂ ಸಮಧಿಗಚ್ಛತಿ ॥೪॥

ನ ಕರ್ಮಣಾಮ್ ಅನಾರಂಭಾತ್ ನೈಷ್ಕರ್ಮ್ಯಂ ಪುರುಷಃ ಅಶ್ನುತೇ ।
ನ ಚ ಸಂನ್ಯಸನಾತ್ ಏವ ಸಿದ್ಧಿಮ್ ಸಮಧಿಗಚ್ಛತಿ--ಕರ್ಮಗಳಲ್ಲಿ ತೊಡಗದೇ ಇರುವುದರಿಂದ ಸಾಧಕ

ಕರ್ಮಗಳಿಂದ ಬಿಡುಗಡೆ ಹೊಂದುವುದಿಲ್ಲ. ಕರ್ಮ ಫಲವನ್ನು ತೊರೆದ ಮಾತ್ರಕ್ಕೆ ಸಿದ್ಧಿ ಪಡೆಯುವುದಿಲ್ಲ.

ಶಾಸ್ತ್ರಗಳಲ್ಲಿ ಹೇಳುವಂತೆ 'ಕರ್ಮ ಬಂಧನದ ದಾರಿ ಹಾಗೂ ಜ್ಞಾನ ಬಿಡುಗಡೆಯ ದಾರಿ'. ಆದರೆ ಕೃಷ್ಣ ಹೇಳಿದ - ಮೋಕ್ಷಕ್ಕೆ ಜ್ಞಾನಪ್ರದವಾದ ಮತ್ತು ಕರ್ಮಪ್ರದವಾದ ಎರಡು ಮಾರ್ಗಗಳಿವೆ ಎಂದು. ಇಲ್ಲಿ ಅದರ ವಿವರಣೆ ಕೊಡುತ್ತಾನೆ ಕೃಷ್ಣ. ಮೋಕ್ಷ ನಿಷ್ಕರ್ಮದಿಂದ ಪಡೆಯುವಂತಾದ್ದು; ಕರ್ಮ-ಬಂಧಕ ಅನ್ನುವುದಾದರೆ, ಒಂದು ಶರೀರದಲ್ಲಿ ಜೀವ ಏನೂ ಕರ್ಮ ಮಾಡದೇ ಇರಲು ಸಾಧ್ಯವೇ ಇಲ್ಲ. ದೇಹ ಬಂದ ಮೇಲೆ ಕರ್ಮ ಕ್ರಿಯೆ ನಡೆದೇ ನಡೆಯುತ್ತದೆ. ಕರ್ಮ ಮಾಡುವುದನ್ನು ಬಿಟ್ಟ ತಕ್ಷಣ ಮೋಕ್ಷ ದೊರೆಯದು. ಮೂಲತಃ ಕರ್ಮವನ್ನು ತೊರೆಯುವುದೂ ಸಾಧ್ಯವಿಲ್ಲ. ಜ್ಞಾನಕ್ಕೆ ಪೂರಕವಲ್ಲದ ಯಾಂತ್ರಿಕ ಕರ್ಮ ಬಂಧಕ. ಜ್ಞಾನಕ್ಕೆ ಪೂರಕವಾದ ಕರ್ಮ ಎಂದೂ ಬಂಧಕವಲ್ಲ. ಕರ್ಮದ ಫಲವನ್ನು ಬಯಸದೇ ಇದ್ದ ತಕ್ಷಣ ಯಾವ ಸಿದ್ಧಿಯೂ ಆಗದು. ಕೇವಲ ಕರ್ಮತ್ಯಾಗ ಮಾಡುವುದರಿಂದ ಎಂದೂ ಸಿದ್ಧಿ ಪಡೆಯಲು ಸಾಧ್ಯವಿಲ್ಲ.

ನಹಿ ಕಶ್ಚಿತ್ ಕ್ಷಣಮಪಿ ಜಾತು ತಿಷ್ಠತ್ಯಕರ್ಮಕೃತ್ ।
ಕಾರ್ಯತೇ ಹ್ಯವಶಃ ಕರ್ಮ ಸರ್ವಃ ಪ್ರಕೃತಿಜೈರ್ಗುಣೈಃ ॥೫॥

ನ ಹಿ ಕಶ್ಚಿತ್ ಕ್ಷಣಮ್ ಅಪಿ ಜಾತು ತಿಷ್ಠತಿ ಅಕರ್ಮ ಕೃತ್ ।
ಕಾರ್ಯತೇ ಹಿ ಅವಶಃ ಕರ್ಮ ಸರ್ವಃ ಪ್ರಕೃತಿಜೈಃ ಗುಣೈಃ--ಯಾವನೂ ಒಂದು ಕ್ಷಣ ಕೂಡಾ ಏನೂ ಮಾಡದೇ ತೆಪ್ಪಗಿರುವುದು ಸಾಧ್ಯವಿಲ್ಲ. ಪ್ರತಿಯೊಬ್ಬನೂ ಪ್ರಕೃತಿಯ ಗುಣಗಳಿಂದ ಅರಿವಿಲ್ಲದೆಯೇ (ಭಗವಂತನ ಅಧೀನವಾಗಿ) ಕರ್ಮ ಮಾಡುತ್ತಾನೆ.

ಕರ್ಮತ್ಯಾಗದಿಂದ ಸಿದ್ಧಿ ಸಿಗದು. ಅಷ್ಟೇ ಅಲ್ಲ, ಕರ್ಮತ್ಯಾಗ ಮಾಡುವುದು ಸಾಧ್ಯವೇ ಇಲ್ಲ. ನಮ್ಮ ಅನ್ನಮಯ ಮತ್ತು ಪ್ರಾಣಮಯಕೋಶ ನಿರಂತರ ಕಾರ್ಯ ನಿರ್ವಹಿಸುತ್ತಿರುತ್ತವೆ. ಬದುಕಿರುವಾಗ ನಿಷ್ಕ್ರೀಯರಾಗಿರುವುದು ಅಸಾಧ್ಯ. ಯಾವ ಕಾಲದಲ್ಲೂ ಕೂಡಾ ಒಂದು ಕ್ಷಣವೂ ನಿಷ್ಕ್ರೀಯನಾಗಿ ಇರುವುದು ಯಾರಿಗೂ ಸಾಧ್ಯವಿಲ್ಲ. "ಕಾರ್ಯತೇ ಹಿ ಅವಶಃ"-ದೇಹದ ಒಳಗಿರುವ ಜೀವನಲ್ಲಿ ಆತನ ದೇಹದ ಮೂಲಕ, ಮನಸ್ಸಿನ ಮೂಲಕ, ಮಾತಿನ ಮೂಲಕ-ಕೆಲಸ ಮಾಡಿಸಲ್ಪಡುತ್ತದೆ. ಅದು ಜೀವನ ಸ್ವಾಧೀನದಲ್ಲಿರುವುದಿಲ್ಲ. ಅದು ಭಗವಂತನ ವಶ. ಇಡೀ ವಿಶ್ವವೇ ಪ್ರಕೃತಿಯಿಂದ ಸೃಷ್ಟಿಯಾಗಿದೆ. ಅದರ ಮೂಲ ದ್ರವ್ಯ ಸತ್ವ-ರಜಸ್ಸು-ತಮಸ್ಸು. ಜೀವಕ್ಕೆ ಅದರದ್ದೇ ಆದ ಸ್ವಭಾವವಿರುತ್ತದೆ. ಅದಕ್ಕನುಗುಣವಾಗಿ ಪ್ರಕೃತಿಯ ಈ ತ್ರಿಗುಣಗಳ ಪ್ರಭಾವ ನಮ್ಮ ಮೇಲಾಗುತ್ತಿರುತ್ತದೆ. ಆದ್ದರಿಂದ ನಿಷ್ಕ್ರೀಯತೆ ಎನ್ನುವುದು ಅರ್ಥಶೂನ್ಯ. ನಾವು ಜೀವನದಲ್ಲಿ ನಮ್ಮನ್ನು ನಾವು ತೊಡಗಿಸಿಕೊಳ್ಳಬೇಕು. ಕರ್ತವ್ಯ ಶೀಲರಾಗಬೇಕು. ಅದರೊಂದಿಗೆ ಮಾನಸಿಕವಾಗಿ ಐಹಿಕ ಪ್ರಪಂಚದಿಂದ ಆಚೆಗಿನ ಸತ್ಯದ ಕಡೆ ನಮ್ಮ ಮನಸ್ಸು ಜಾಗೃತವಾಗಿರಬೇಕು. ಈ ಎಚ್ಚರದಿಂದ ಎಲ್ಲಾ ಕರ್ತವ್ಯ ಕರ್ಮಗಳನ್ನು ಮಾಡಬೇಕು. ನಿಷ್ಕ್ರೀಯತೆ ವೇದಾಂತವಲ್ಲ-ಕರ್ತವ್ಯಚ್ಯುತಿ ಅಧ್ಯಾತ್ಮವಲ್ಲ. ಭಗವಂತನ ಪ್ರಜ್ಞೆಯೊಂದಿಗೆ ನಿನ್ನ ಪಾಲಿನ ಕರ್ಮ ನೀನು ಮಾಡು. ಹೀಗೆ ಮಾಡಿದಾಗ ಕರ್ಮ ಮತ್ತು ಜ್ಞಾನ ಮಾರ್ಗಗಳು ಒಂದಕ್ಕೊಂದು ಪೂರಕವಾಗುತ್ತವೆ.

ಕರ್ಮೇಂದ್ರಿಯಾಣಿ ಸಂಯಮ್ಯ ಯ ಆಸ್ತೇ ಮನಸಾ ಚರನ್ ।
ಇಂದ್ರಿಯಾರ್ಥಾನ್ ವಿಮೂಢಾತ್ಮಾ ಮಿಥ್ಯಾಚಾರಃ ಸ ಉಚ್ಯತೇ ॥೬॥

ಕರ್ಮೇಂದ್ರಿಯಾಣಿ ಸಂಯಮ್ಯ ಯಃ ಆಸ್ತೇ ಮನಸಾ ಚರನ್ |
ಇಂದ್ರಿಯ ಅರ್ಥಾನ್ ವಿಮೂಢ ಆತ್ಮಾ ಮಿಥ್ಯಾ ಆಚಾರಃ ಸಃ ಉಚ್ಯತೇ- ಕರ್ಮೇಂದ್ರಿಯಗಳನ್ನು ಅದುಮಿಟ್ಟು, ಮನಸ್ಸಿನಿಂದಲೇ ಇಂದ್ರಿಯ ವಿಷಯಗಳ ಕನಸು ಕಾಣುವ ತಿಳಿಗೇಡಿ ಡಂಭಾಚಾರಿ ಎನಿಸುತ್ತಾನೆ.

ಈ ಶ್ಲೋಕದಲ್ಲಿ ಕೃಷ್ಣ ಒಂದು ಮುಖ್ಯವಾದ ವಿಚಾರವನ್ನು ಹೇಳಿದ್ದಾನೆ. ಸಾಮಾನ್ಯವಾಗಿ ಇಂದಿನ ಪ್ರಪಂಚದಲ್ಲಿ ಹೊರಗಿನ ವೇಷಕ್ಕೆ ಹೆಚ್ಚು ಪ್ರಾಧಾನ್ಯತೆ ಕೊಡುತ್ತಿರುವುದನ್ನು ನಾವು ಕಾಣುತ್ತೇವೆ. ಮನಸ್ಸಿನಲ್ಲಿ ಎಲ್ಲಾ ಆಸೆ ಇಟ್ಟುಕೊಂಡು, ಯಾವುದೋ ಭಯದಿಂದ ಹೊರನೋಟಕ್ಕೆ ಸದಾಚಾರಸಂಪನ್ನರಂತೆ ಬದುಕುವವರಿದ್ದಾರೆ. ಕೃಷ್ಣ ಇದನ್ನು ಕಪಟ ಧಾರ್ಮಿಕತೆ ಎನ್ನುತ್ತಾನೆ. ನಾವು ಮೊದಲು ನಮ್ಮ ಆತ್ಮಸಾಕ್ಷಿಗೆ ವಂಚನೆ ಮಾಡದೇ ಬದುಕಬೇಕು. ಹೊರಗಿನ ಆಚಾರಕ್ಕಿಂತ ಮೊದಲು ಒಳಗಿನ ಆಚಾರಶುದ್ಧಿ ಮುಖ್ಯ. ಇದಿಲ್ಲದಿದ್ದರೆ ಎಂದೂ ಉದ್ಧಾರವಿಲ್ಲ. ಕರ್ಮೇಂದ್ರಿಯಗಳನ್ನು ಅದುಮಿಟ್ಟು, ಮನಸ್ಸಿನಿಂದಲೇ ಇಂದ್ರಿಯ ವಿಷಯಗಳ ಕನಸು ಕಾಣುವ ತಿಳಿಗೇಡಿ ಡಂಭಾಚಾರಿ ಎನಿಸುತ್ತಾನೆ ಎಂದಿದ್ದಾನೆ ಕೃಷ್ಣ.

ಯಸ್ತ್ವಿಂದ್ರಿಯಾಣಿ ಮನಸಾ ನಿಯಮ್ಯಾರಭತೇರ್ಜುನ ।
ಕರ್ಮೇಂದ್ರಿಯೈಃ ಕರ್ಮಯೋಗಮಸಕ್ತಃ ಸ ವಿಶಿಷ್ಯತೇ ॥೭॥

ಯಃ ತು ಇಂದ್ರಿಯಾಣಿ ಮನಸಾ ನಿಯಮ್ಯ ಆರಭತೇ ಅರ್ಜುನ |
ಕರ್ಮ ಇಂದ್ರಿಯೈಃ ಕರ್ಮಯೋಗಮ್ ಅಸಕ್ತಃ ಸಃ ವಿಶಿಷ್ಯತೇ- ಓ ಅರ್ಜುನಾ, ಇಂದ್ರಿಯಗಳನ್ನು ಮನೋಬಲದಿಂದ ಗೆದ್ದು, ಫಲದ ನಂಟು ತೊರೆದು, ಇಂದ್ರಿಯಗಳ ಮೂಲಕ ಸಾಧನೆಯಲ್ಲಿ ತೊಡಗುವವನು ಮಿಗಿಲಾದವನು.

ಮನಸ್ಸು ಸ್ವಚ್ಛವಾಗಿದ್ದು, ಇಂದ್ರಿಯಗಳ ಮೇಲೆ ಮಾನಸಿಕ ಕಡಿವಾಣ ಗಟ್ಟಿಯಿದ್ದಾಗ- ಕರ್ಮೇಂದ್ರಿಯದಿಂದ ಮಾಡುವ ಸಾಧನೆ ಕರ್ಮಯೋಗವಾಗುತ್ತದೆ. ಇದು ಶುದ್ಧ ಅಧ್ಯಾತ್ಮ ಸಾಧನೆ. ಈ ಸ್ಥಿತಿಯಲ್ಲಿ ಇಂದ್ರಿಯಗಳು ದಾರಿ ತಪ್ಪುವುದಿಲ್ಲ. ತನ್ನ ಜೀವ ಸ್ವರೂಪದ ಸ್ವಭಾವಕ್ಕನುಗುಣವಾಗಿ ಚಿತ್ತ ಶುದ್ಧಿಯಿಂದ ಮಾಡುವ ಕರ್ಮ ನಿಜವಾದ ಅಧ್ಯಾತ್ಮ ಸಾಧನೆ. ಈ ರೀತಿಯ ಸಾಧನೆಯಲ್ಲಿ ತೊಡಗುವವನು ಶ್ರೇಷ್ಠನೆನಿಸುತ್ತಾನೆ. ಇಂತವರು ಒಳಗೊಂದು-ಹೊರಗೊಂದು ಆಗಿರದೇ, ಮನೋಬಲದಿಂದ ಇಂದ್ರಿಯಗಳನ್ನು ಗೆದ್ದು, ಫಲದ ನಂಟನ್ನು ತೊರೆದು, ಎತ್ತರಕ್ಕೇರುತ್ತಾರೆ.

ನಿಯತಂ ಕುರು ಕರ್ಮ ತ್ವಂ ಕರ್ಮ ಜ್ಯಾಯೋ ಹ್ಯಕರ್ಮಣಃ ।
ಶರೀರಯಾತ್ರಾಪಿ ಚ ತೇ ನ ಪ್ರಸಿದ್ಧ್ಯೇದಕರ್ಮಣಃ ॥೮॥

ನಿಯತಮ್ ಕುರು ಕರ್ಮ ತ್ವಮ್ ಕರ್ಮ ಜ್ಯಾಯಃ ಹಿ ಅಕರ್ಮಣಃ |
ಶರೀರ ಯಾತ್ರಾ ಅಪಿ ಚ ತೇ ನ ಪ್ರಸಿದ್ಧ್ಯೇತ್ ಅಕರ್ಮಣಃ -ನಿನ್ನ ಪಾಲಿನ ಕರ್ಮ ನೀನು ಮಾಡು. ನಿಷ್ಕ್ರೀಯತೆಗಿಂತ ಕರ್ಮ ಮೇಲಲ್ಲವೇ ? ನಿಷ್ಕ್ರೀಯನಾದರೆ ನಿನ್ನ ಬಾಳ ಬಂಡಿಯ ಪಯಣವು ಸಾಗದು.

ಕೃಷ್ಣ ಹೇಳುತ್ತಾನೆ: 'ನೀನು ನಿನ್ನ ಜೀವ ಸ್ವಭಾವಕ್ಕೆ ಅನುಗುಣವಾದ, ಜ್ಞಾನಕ್ಕೆ ಪೂರಕವಾದ ನಿಯತ ಕರ್ಮವನ್ನು ಮಾಡು' ಎಂದು. ಇಲ್ಲಿ ಅರ್ಜುನನನ್ನು ನೋಡಿದರೆ, ಆತನ ಜೀವ ಸ್ವಭಾವ ಅನ್ಯಾಯದ ವಿರುದ್ಧ ಹೋರಾಡಿ ದೇಶದ ಪ್ರಜೆಗಳ ರಕ್ಷಣೆ ಮಾಡುವ ಕ್ಷತ್ರಿಯ ಸ್ವಭಾವ. ಅದನ್ನು ಬಿಟ್ಟು, ದೇಶದಲ್ಲಿ ಅನ್ಯಾಯ ತಾಂಡವವಾಡುತ್ತಿರುವಾಗ, ಜ್ಞಾನ ಮಿಗಿಲೆಂದು ತಪಸ್ಸನ್ನಾಚರಿಸಿದರೆ ಅದು ನಿಜವಾದ ಯೋಗವೆನಿಸುವುದಿಲ್ಲ. ಕೃಷ್ಣ ಹೇಳುತ್ತಾನೆ, "ಎಂದೂ ನಿಷ್ಕ್ರೀಯನಾಗಬೇಡ, ನಿನ್ನ ಕರ್ಮವನ್ನು ನೀನು ಮಾಡು, ಅದರಿಂದ ಏನು ಸಿಕ್ಕಿತೋ ಅದನ್ನು ಅನುಭವಿಸು. ಆದರೆ ಮಾಡುವ ಕರ್ಮ ಜ್ಞಾನಕ್ಕೆ ಪೂರಕವಾಗಿರಲಿ. ಭಗವಂತನ ಎಚ್ಚರ ಯಾವಾಗಲೂ ಇರಲಿ" ಎಂದು. 'ಭಗವಂತ ಈ ಕರ್ಮವನ್ನು ನನ್ನ ಕೈಯಿಂದ ಮಾಡಿಸುತ್ತಿದ್ದಾನೆ, ಇದು ಅವನಿಗರ್ಪಿತ' ಎನ್ನುವ ಭಾವನೆಯಿಂದ ಕರ್ಮ ಮಾಡಿದಾಗ ಯಾವ ಕರ್ಮವೂ ನಮಗೆ ಬಂಧಕವಾಗುವುದಿಲ್ಲ.

ನಿನ್ನ ಪಾಲಿನ ಕರ್ಮ ಮಾಡು, ಬಂದುದನುಣ್ಣು, ಹರಿಯ ಚರಣದ ಅರಿವು ತಪ್ಪದಿರಲಿ.
ಹರಿಯೇ ಪರ ದೈವತವು, ಹರಿಯೇ ಗುರು ಆಸರೆಯು, ಹರಿಯೊಬ್ಬನೆ ಜಗದ ತಾಯಿ ತಂದೆ.

ನಾವು ಒಂದು ದೇಹದಲ್ಲಿರುವಷ್ಟು ಕಾಲ ಕರ್ಮ ಅನಿವಾರ್ಯ. ಅಪರೋಕ್ಷ ಜ್ಞಾನ ಬಂದಾಗಲೂ ಕೂಡಾ ಕರ್ಮ ನಿರಂತರ. ಈ ರೀತಿ ಕೃಷ್ಣ ಕರ್ಮ ಸಿದ್ಧಾಂತವನ್ನು ಈ ಶ್ಲೋಕದ ಮುಖೇನ ನಮ್ಮ ಮುಂದೆ ಬಿಚ್ಚಿಟ್ಟಿದ್ದಾನೆ.

ಇಲ್ಲಿ ಒಂದು ವಿಷಯವನ್ನು ನಾವು ಸರಿಯಾಗಿ ಅರ್ಥ ಮಾಡಿಕೊಳ್ಳಬೇಕು. ಶಾಸ್ತ್ರಗಳು ಹೇಳುವ ಪ್ರಕಾರ ಕರ್ಮ ಬಂಧಕ. ಪುನಃ ಕರ್ಮ ಮಾಡುವುದರಿಂದ ನಾವು ಕರ್ಮ ಚಕ್ರದಲ್ಲಿ ಸಿಲುಕುತ್ತೇವೆ. ಆದರೆ ಇಲ್ಲಿ ಕೃಷ್ಣ ಹೇಳುತ್ತಾನೆ- ಕರ್ಮ ಅನಿವಾರ್ಯ ಎಂದು. ಹಾಗಿದ್ದರೆ ಮೋಕ್ಷದ ಮಾರ್ಗ ಯಾವುದು? ನಮ್ಮ ಈ ಪ್ರಶ್ನೆಗೆ ಮುಂದಿನ ಶ್ಲೋಕದಲ್ಲಿ ಸ್ಪಷ್ಟ ಉತ್ತರವಿದೆ.

ಯಜ್ಞಾರ್ಥಾತ್ ಕರ್ಮಣೋನ್ಯತ್ರ ಲೋಕೋಯಂ ಕರ್ಮಬಂಧನಃ ।
ತದರ್ಥಂ ಕರ್ಮ ಕೌಂತೇಯ ಮುಕ್ತಸಂಗಃ ಸಮಾಚರ ॥೯॥

ಯಜ್ಞಾ ಅರ್ಥಾತ್ ಕರ್ಮಣಃ ಅನ್ಯತ್ರ ಲೋಕಃ ಅಯಮ್ ಕರ್ಮ ಬಂಧನಃ |
ತತ್ ಅರ್ಥಮ್ ಕರ್ಮ ಕೌಂತೇಯ ಮುಕ್ತಸಂಗಃ ಸಮಾಚರ-- ಭಗವಂತನ ಪೂಜಾರೂಪವಾದ ಇಂತಹ

ಕರ್ಮಕ್ಕಿಂತ ಬೇರೆಯಾದ ನಡೆಯಲ್ಲಿ ಮಾತ್ರ ಸಾಧಕ ಕರ್ಮದ ಕಟ್ಟಿಗೆ ಸಿಲುಕುತ್ತಾನೆ. ಓ ಕೌಂತೇಯಾ, ಫಲದ ನಂಟು ತೊರೆದು, ಭಗವಂತನ ಪೂಜೆಯೆಂದು ಕರ್ಮ ಮಾಡು.

ಈ ಲೋಕ ಕರ್ಮದ ಬಂಧನಕ್ಕೆ ಒಳಗಾಗಿದೆ. ಆದರೆ ಎಲ್ಲಾ ಕರ್ಮವೂ ಬಂಧಕ ಅಲ್ಲ. ತಿಳಿದು ಮಾಡುವ ಕರ್ಮ ಎಂದೂ ಬಂಧಕವಾಗುವುದಿಲ್ಲ. ನಾವು ಮಾಡುವ ಕರ್ಮವನ್ನು ಭಗವಂತನ ಪ್ರಜ್ಞೆಯಿಂದ ಮಾಡಬೇಕು. ನಾವು ಸೂತ್ರದ ಗೊಂಬೆಗಳಿದ್ದಂತೆ. ಭಗವಂತ ಸೂತ್ರದಾರ. ಈ ಎಚ್ಚರದಿಂದ ನಾವು ಕರ್ಮ ಮಾಡಿದಾಗ ನಮ್ಮ ಪ್ರತಿಯೊಂದು ಕರ್ಮವೂ ಕೂಡಾ ಯಜ್ಞವಾಗುತ್ತದೆ. ಉದಾಹರಣೆಗೆ ನಾವು ಉಸಿರಾಡುತ್ತೇವೆ. ಹೊರಗಿನಿಂದ ಆಮ್ಲಜನಕವನ್ನು ಹೀರಿ ಕಾರ್ಬನ್ ಡೈ ಆಕ್ಸೈಡನ್ನು ಹೊರ ಹಾಕುತ್ತೇವೆ. ನಮ್ಮೊಳಗಿರುವ ಆ ವಿಶೇಷ ಯಂತ್ರದ ಕಲ್ಪನೆ ಕೂಡಾ ನಮಗಿರುವುದಿಲ್ಲ. ನಮಗೆ ಅರಿವಿಲ್ಲದಂತೆ ಈ ಕ್ರಿಯೆ ನಡೆಯುತ್ತಿರುತ್ತದೆ. ನಾವು ಬಿಟ್ಟ ಗಾಳಿಯನ್ನು ಗಿಡಗಳು ಸೇವಿಸಿ ನಮಗೆ ಬೇಕಾದ ಆಮ್ಲಜನಕವನ್ನು ಕೊಡುತ್ತವೆ. ಇದೆಲ್ಲವೂ ಆ ಭಗವಂತನ ವ್ಯವಸ್ಥೆ. ಈ ಕಾರಣಕ್ಕಾಗಿ ಭಾರತೀಯರು ಅತಿಹೆಚ್ಚು ಆಮ್ಲಜನಕವನ್ನು ಕೊಡುವ ಅಶ್ವತ್ಥವೃಕ್ಷವನ್ನು ಪೂಜಿಸುತ್ತಾರೆ. ಆ ವೃಕ್ಷದಲ್ಲಿ ಭಗವಂತನ ವಿಶೇಷ ವಿಭೂತಿ ಅಡಗಿದೆ. ಈ ರೀತಿ ನಾವು ನಮ್ಮ ಪ್ರತಿಯೊಂದು ಕಾರ್ಯದಲ್ಲೂ ಭಗವಂತನ ಹಿರಿಮೆಯನ್ನು ತಿಳಿದಾಗ, ನಾವು ಮಾಡುವ ಕರ್ಮ-ಕರ್ಮಯೋಗವಾಗುತ್ತದೆ. ಹಾಗೂ ಅದು ಎಂದೂ ಬಂಧಕವಾಗುವುದಿಲ್ಲ.

ಇಲ್ಲಿ ಬಳಕೆಯಾದ 'ಯಜ್ಞ' ಪದದ ಅರ್ಥ 'ಯಜ-ದೇವ-ಪೂಜಾ' ಅಂದರೆ ದೇವರ ಪೂಜೆ ಎಂದರ್ಥ. ದೇವರನ್ನು ಕೂಡಾ ಯಜ್ಞ ಎಂದು ಕರೆಯುತ್ತಾರೆ. ಆದ್ದರಿಂದ ಕೇವಲ ಅಗ್ನಿ ಮುಖದಲ್ಲಿ ಮಾಡುವ ಪೂಜೆ ಮಾತ್ರ ಯಜ್ಞವಲ್ಲ. ನಮ್ಮ ಪ್ರತಿಯೊಂದು ಕರ್ಮವನ್ನು ಭಗವತ್ಪ್ರಜ್ಞೆಯಿಂದ ಮಾಡಿದಾಗ ಅದು ಯಜ್ಞವಾಗುತ್ತದೆ. ಇಲ್ಲಿ ನಾವು ಬಿಡಬೇಕಾದದ್ದು ಕರ್ಮವನ್ನಲ್ಲ, ಬದಲಿಗೆ ನಾವು ಕರ್ಮದ ಬಗ್ಗೆ ಇರುವ ನಮ್ಮ ಭಾವನೆಯನ್ನು ಬದಲಿಸಿ ಕೊಳ್ಳಬೇಕು ಅಷ್ಟೆ. ಕರ್ಮ ಎಂದರೆ 'ಕರ+ಮ' ಅಂದರೆ ಭಗವಂತನ ರಾಜ್ಯದ ಪ್ರಜೆಗಳಾದ ನಾವು ಆತನಿಗೆ ಸಲ್ಲಿಸುವ 'ಕರ' ಅಥವಾ ಕಂದಾಯವೇ ಕರ್ಮ. ಭಗವಂತ ಎಂದೂ ದುಡ್ಡಿನ ಕಂದಾಯವನ್ನು ಪಡೆಯುವುದಿಲ್ಲ. ಆತನ ಕರ ಸಂದಾಯವನ್ನು ನಾವು- ನಮ್ಮನ್ನು ಸಮಾಜ ಕ್ರಿಯೆಯಲ್ಲಿ ತೊಡಗಿಸಿಕೊಂಡು ಸಲ್ಲಿಸಬೇಕು. ಈ ಭಾವನೆ ಬಂದಾಗ ಕರ್ಮ ಬಂಧಕವಾಗದೇ ಮೋಕ್ಷ ಮಾರ್ಗವಾಗುತ್ತದೆ.

ಇಲ್ಲಿ ಕೃಷ್ಣ ಅರ್ಜುನನನ್ನು 'ಕೌಂತೇಯಾ' ಎಂದು ಸಂಬೋಧಿಸಿದ್ದಾನೆ. ಈ ರೀತಿ ಇಲ್ಲಿ ಸಂಬೋಧಿಸಲು ವಿಶೇಷ ಕಾರಣವಿದೆ. ಕುಂತಿ ಅಷ್ಟು ದೊಡ್ಡ ಮನೆತನದಲ್ಲಿ ಹುಟ್ಟಿ ಬೆಳೆದರೂ ಕೂಡಾ, ಆಕೆ ಎಂದೂ ಭೋಗದ ಆಸೆಗೆ ಬಲಿಬಿದ್ದವಳಲ್ಲ. ತನ್ನ ಯೌವನವನ್ನು ಕಾಡಿನಲ್ಲಿ ಕಳೆದ ಆಕೆ, ತನ್ನ ಮಕ್ಕಳು ಧೈರ್ಯಗೆಟ್ಟಾಗ ಧೈರ್ಯ ತುಂಬಿದ ಧೀರ ಮಹಿಳೆ. ಆಕೆ ಅನುಭವಿಸಿದ ಕಷ್ಟ ಅಷ್ಟಿಷ್ಟಲ್ಲ. ಆದರೆ ಆಕೆ ಕೃಷ್ಣನಲ್ಲಿ "ನನಗೆ ಕಷ್ಟವನ್ನೇ ಕೊಡು, ಏಕೆಂದರೆ ಆಗ ನಮಗೆ ಸದಾ ನಿನ್ನೊಂದಿಗಿರುವ ಭಾಗ್ಯವಿರುತ್ತದೆ" ಎಂದಾಕೆ! ಕರ್ತವ್ಯನಿಷ್ಠೆಯನ್ನು ಜಗತ್ತಿಗೆ ತೋರಿದ ಧೀರ ಮಹಿಳೆ ಆಕೆ. ಇಂತಹ ಮಹಾ ಮಹಿಳೆಯ ಮಗನಾದ ನಿನಗೆ ಕರ್ಮಯೋಗದ ಬಗ್ಗೆ ತಿಳಿದೇ ಇದೆ ಎನ್ನುವ ಧ್ವನಿಯಲ್ಲಿ ಕೃಷ್ಣ ಅರ್ಜುನನನ್ನು 'ಕೌಂತೇಯಾ' ಎಂದು ಸಂಬೋಧಿಸಿದ್ದಾನೆ.

ಈ ರೀತಿ ಜ್ಞಾನವನ್ನು ಮತ್ತು ಕರ್ಮವನ್ನು ಹೇಗೆ ಸಮನ್ವಯಗೊಳಿಸಿಕೊಂಡು ಬದುಕಬೇಕು ಎನ್ನುವುದನ್ನು ಹೇಳಿದ ಕೃಷ್ಣ, ಮುಂದೆ ಅದು ಸ್ಪಷ್ಟವಾಗಿ ಅರ್ಥವಾಗುವಂತೆ ಒಂದು ಕಥೆಯ ರೂಪದಲ್ಲಿ ವಿವರಣೆಯನ್ನು ಕೊಡುತ್ತಾನೆ. ಆ ವಿವರಣೆಯನ್ನು ಮುಂದಿನ ಶ್ಲೋಕಗಳಲ್ಲಿ ನೋಡೋಣ.

ಸಹಯಜ್ಞಾಃ ಪ್ರಜಾಃ ಸೃಷ್ಟ್ವಾ ಪುರೋವಾಚ ಪ್ರಜಾಪತಿಃ ।
ಅನೇನ ಪ್ರಸವಿಷ್ಯಧ್ವಮೇಷ ವೋSಸ್ತ್ವಿಷ್ಟಕಾಮಧುಕ್ ॥೧೦॥

ಸಹ ಯಜ್ಞಾಃ ಪ್ರಜಾಃ ಸೃಷ್ಟ್ವಾ ಪುರಾ ಉವಾಚ ಪ್ರಜಾಪತಿಃ |
ಅನೇನ ಪ್ರಸವಿಷ್ಯಧ್ವಮ್ ಏಷ ವಃ ಅಸ್ತು ಇಷ್ಟ ಕಾಮ ಧುಕ್- ಹಿಂದೆ ಪ್ರಜಾಪತಿ ಭಗವಂತನ ಪೂಜಾ ರೂಪವಾದ ಕರ್ಮದ ಜೊತೆಗೆ ಮಾನವರನ್ನು ಹುಟ್ಟಿಸಿ ಹೀಗೆ ಹೇಳಿದನು: ಇದರಿಂದ ಬೆಳವಣಿಗೆ ಹೊಂದಿ, ಇದು ನಿಮ್ಮ ಬಯಕೆಯನ್ನು ಈಡೇರಿಸಲಿ.

ಹಿಂದೆ ಚತುರ್ಮುಖ- ಚಿಂತನ ಶೀಲ ಮಾನವರನ್ನು ಸೃಷ್ಟಿ ಮಾಡಿ, ಅವರಿಗಾಗಿ ಅವರು ಆಚರಿಸಬೇಕಾದ ಯಜ್ಞವನ್ನು ಸೃಷ್ಟಿ ಮಾಡಿದ. ಹಾಗೂ ಹೇಳಿದ " ಈ ಪೂಜಾ ವಿಧಾನದಿಂದ ಬೇಕಾದ್ದನ್ನು ಪಡೆಯಿರಿ. ಇದು ನೀವು ಬಯಸಿದ ಅಭೀಷ್ಟವನ್ನು ಕೊಡುವ ಕಾಮದೇನು" ಎಂದು. ಹಿಂದೆ ಹೇಳಿದಂತೆ 'ಯಜ್ಞ' ಎಂದರೆ 'ದೇವರನ್ನು ಉಪಾಸನೆ ಮಾಡುವ ವಿಧಾನ'; 'ದಾನ' ಹಾಗೂ 'ಸಂಗತೀಕರಣ' ಕೂಡಾ ಯಜ್ಞ. ದಾನ ಎನ್ನುವುದಕ್ಕೆ ವಿಶೇಷ ಅರ್ಥವಿದೆ. ತನ್ನಲ್ಲಿ ಬೇಕಾದಷ್ಟು ಇದ್ದು, ತನಗೆ ಬೇಡವಾದದ್ದನ್ನು ಇನ್ನೊಬ್ಬನಿಗೆ ಕೊಡುವುದು ದಾನವಲ್ಲ. ತನ್ನಲ್ಲಿ ಎರಡು ಹೊತ್ತಿನ ಊಟವಿದ್ದು, ಇನ್ನೊಬ್ಬನಲ್ಲಿ ಒಂದು ಹೊತ್ತಿನ ಊಟ ಕೂಡಾ ಇಲ್ಲದಿದ್ದಾಗ, ಅವನಿಗೆ ತನ್ನಲ್ಲಿರುವ ಊಟವನ್ನು ಕೊಟ್ಟು ಹಂಚಿ ತಿನ್ನುವುದು ನಿಜವಾದ ದಾನ. ಇನ್ನೊಬ್ಬರ ಕಷ್ಟದಲ್ಲಿ ಕರಗುವುದು ನಿಜವಾದ ದಾನ. ಇನ್ನು ಸಂಗತೀಕರಣ ಎಂದರೆ ಜ್ಞಾನಾರ್ಜನೆಗಾಗಿ ಒಂದು ಕಡೆ ಕಲೆಯುವುದು. ಪ್ರವಚನ ಒಂದು ಸಂಗತೀಕರಣ.

ದೇವಾನ್ ಭಾವಯತಾನೇನ ತೇ ದೇವಾ ಭಾವಯಂತು ವಃ ।
ಪರಸ್ಪರಂ ಭಾವಯಂತಃ ಶ್ರೇಯಃ ಪರಮವಾಪ್ಸ್ಯಥ ॥೧೧॥

ದೇವಾನ್ ಭಾವಯತಾ ಅನೇನ ತೇ ದೇವಾಃ ಭಾವಯಂತು ವಃ |
ಪರಸ್ಪರಮ್ ಭಾವಯಂತಃ ಶ್ರೇಯಃ ಪರಮ್ ಅವಾಪ್ಸ್ಯಥ-ಇದರಿಂದ ದೇವತೆಗಳಿಗೆ ನೆರವಾಗಿ. ಆ ದೇವತೆಗಳು ನಿಮಗೆ ನೆರವಾಗಲಿ. ಒಬ್ಬರಿಗೊಬ್ಬರು ನೆರವಾಗುತ್ತಾ ಹಿರಿಯ ಹಿತವನ್ನು ಪಡೆಯಿರಿ.

ಈ ರೀತಿ ಯಜ್ಞದ ಸೃಷ್ಟಿ ಮಾಡಿದ ಚತುರ್ಮುಖ ಹೇಳಿದನಂತೆ: “ಯಜ್ಞಗಳ ಮೂಲಕ ನೀವು ದೇವತೆಗಳಿಗೆ ನೆರವಾಗಿ ಹಾಗೂ ಅವರು ನಿಮ್ಮ ಅಭೀಷ್ಟವನ್ನು ಪೂರೈಸಲಿ" ಎಂದು. "ಹೀಗೆ ಒಬ್ಬರಿಗೊಬ್ಬರು ನೆರವಾಗುತ್ತಾ ಹಿರಿಯ ಹಿತವನ್ನು ಪಡೆಯಿರಿ" ಎಂದನಂತೆ. ನಾವು ನಮಗೆ ಬೇಕಾದುದನ್ನು ನಾವೇ ಸೃಷ್ಟಿಸಿಕೊಳ್ಳುತ್ತೇವೆ

ಎನ್ನುವುದು ನಮ್ಮ ಭ್ರಮೆ. ನಾವು ಬಿತ್ತಿ ಬೆಳೆಯಬೇಕು ಎಂದರೆ ಪ್ರಕೃತಿಯಲ್ಲಿ ವಾತಾವರಣ ವೈಪರೀತ್ಯ ಆಗಬಾರದು. ಇಲ್ಲದಿದ್ದರೆ ನಮಗೆ ಏನನ್ನೂ ಬೆಳೆಯಲು ಸಾಧ್ಯವಿಲ್ಲ. ಪ್ರತಿಯೊಂದು ಕ್ರಿಯೆಯ ಹಿಂದೆ ಅನೇಕ ದೇವತಾಶಕ್ತಿಗಳು ಕಾರ್ಯ ನಿರ್ವಹಿಸುತ್ತಿರುತ್ತವೆ. ನಮ್ಮ ಪ್ರತಿಯೊಂದು ಅಂಗಾಂಗಳಿಗೂ ಒಬ್ಬ ಅಭಿಮಾನಿ ದೇವತೆ ಇದ್ದಾನೆ. ಆ ಶಕ್ತಿ ಕೆಲಸ ಮಾಡದೇ ಇದ್ದರೆ ನಾವು ಏನನ್ನೂ ಮಾಡಲು ಸಾಧ್ಯವಿಲ್ಲ. ಹೀಗೆ ನಮಗೆ ಬದುಕು ಕೊಟ್ಟು, ನೋಡುವ ಕಣ್ಣು, ಕೇಳುವ ಕಿವಿ ಕೊಟ್ಟು, ಒಳ್ಳೆಯದನ್ನು ನೋಡುವ, ಒಳ್ಳೆಯದನ್ನು ಕೇಳುವ ಬುದ್ಧಿ ಕೊಟ್ಟು, ಈ ಎಲ್ಲಾ ಕಾರ್ಯವನ್ನು ಒಂದು ದೇವತೆಗಳ ಸಮೂಹ ನಿರಂತರ ನಡೆಸುವಂತೆ ಭಗವಂತನ ವ್ಯವಸ್ಥೆ ಇದೆ. ಹೀಗಿರುವಾಗ ನಾವು ಇಂತಹ ದೇವತಾ ಶಕ್ತಿಗಳಿಗೆ ಕೃತಜ್ಞತೆಯನ್ನು ಸಲ್ಲಿಸಬೇಕು. ಹೀಗೆ ಒಬ್ಬರಿಗೊಬ್ಬರು ನೆರವಾದಾಗ ನಾವು ಹಿತವನ್ನು ಕಾಣಲು ಸಾಧ್ಯ.

ಸಾಮಾನ್ಯವಾಗಿ ಅಗ್ನಿ ಮುಖದಲ್ಲಿ ಮಾಡುವ ಪೂಜೆಯನ್ನು ಯಜ್ಞ ಎನ್ನುವುದು ವಾಡಿಕೆ. ದೇವರ ಪೂಜೆಯಲ್ಲಿ ಅಗ್ನಿ ಅತ್ಯಂತ ಮುಖ್ಯ ಪ್ರತೀಕ. ಏಕೆಂದರೆ ಅಗ್ನಿ ಅತ್ಯಂತ ಶುದ್ಧ. ಅಗ್ನಿಗೆ ಏನನ್ನು ಹಾಕಿದರೂ ಅದು ಶುದ್ಧವಾಗುತ್ತದೆ. ಅಗ್ನಿ ಭಗವಂತನ ಪ್ರತೀಕ. ಭಗವಂತನಿಗೆ ಆಕಾರವಿಲ್ಲ, ಆತ ಬೆಳಕಿನ ಪುಂಜ ಹಾಗೂ ಪವಿತ್ರ. ಇದೇ ಗುಣವನ್ನು ಅಗ್ನಿಯಲ್ಲಿ ನಾವು ಕಾಣಬಹುದು. ಇನ್ನು ನಾವು ಭಗವಂತನಿಗೆ ಏನನ್ನಾದರೂ ತಿನ್ನಿಸಬೇಕು ಎಂದರೆ ಅದು ಅಗ್ನಿ ಮುಖೇನ ಮಾತ್ರ ಸಾಧ್ಯ. ಯಜ್ಞದಲ್ಲಿ ನಾವು ಪೂಜೆ ಮಾಡುವುದು ಬೆಂಕಿಯನ್ನಲ್ಲ, ಅಗ್ನಿ ಮುಖೇನ ಅಗ್ನಿನಾರಾಯಣನ ಪೂಜೆ-ಯಜ್ಞ. ಈ ಅರಿವಿಲ್ಲದೆ ಯಜ್ಞವನ್ನು ಮಾಡಿದರೆ ಹೊಗೆ ತಿಂದು ಸಾಯಬೇಕಾದೀತು! ನಮ್ಮ ಪೂಜೆ ಅಗ್ನಿನಾರಾಯಣನಿಂದ ಸೂರ್ಯನಾರಾಯಣನನ್ನು ಸೇರಿ, ಮರಳಿ ನರನಾರಾಯಣನನ್ನು ತಲುಪುತ್ತದೆ. ಇದಕ್ಕಾಗಿ ದೇವರನ್ನು ಕುರಿತು ಮಾಡುವ ಯಜ್ಞ ಯಾವಾಗಲೂ ಹಗಲು ಹೊತ್ತಿನಲ್ಲೇ ನಡೆಯುತ್ತದೆ. ಅಗ್ನಿಯ ಏಳು ಬಣ್ಣಗಳ ಮುಖೇನ ಸೂರ್ಯನ ಏಳು ಬಣ್ಣಗಳಲ್ಲಿ ವಿಲೀನವಾಗುವ ಯಜ್ಞಶಕ್ತಿ, ವಾತಾವರಣವನ್ನು ಸೇರಿ ಲೋಕಕ್ಕೆ ಮಂಗಳವನ್ನುಂಟುಮಾಡುತ್ತದೆ. ಇದನ್ನು ಇಲ್ಲಿ ಕೊಡು-ಕೊಂಡುಕೊಳ್ಳುವ ಕ್ರಿಯೆ ಎಂದಿದ್ದಾರೆ.

ಇಷ್ಟಾನ್ ಭೋಗಾನ್ ಹಿ ವೋ ದೇವಾ ದಾಸ್ಯಂತೇ ಯಜ್ಞಭಾವಿತಾಃ ।
ತೈರ್ದತ್ತಾನಪ್ರದಾಯೈಭ್ಯೋ ಯೋ ಭುಂಕ್ತೇ ಸ್ತೇನ ಏವ ಸಃ ॥೧೨॥

ಇಷ್ಟಾನ್ ಭೋಗಾನ್ ಹಿ ವಃ ದೇವಾಃ ದಾಸ್ಯಂತೇ ಯಜ್ಞ ಭಾವಿತಾಃ ।
ತೈಃ ದತ್ತಾನ್ ಅಪ್ರದಾಯ ಏಭ್ಯಃ ಯಃ ಭುಂಕ್ತೇ ಸ್ತೇನಃ ಏವ ಸಃ -ಇಂತಹ ಯಜ್ಞದಿಂದ ಬಲಗೊಂಡ ದೇವತೆಗಳು ನೀವು ಬಯಸಿದ ಬಯಕೆಗಳನ್ನು ಈಡೇರಿಸುತ್ತಾರೆ. ಅವರು ನೀಡಿದ್ದನ್ನು ಅವರಿಗೆ ನೀಡದೇ ತಿನ್ನುವವನು ಕಳ್ಳನೇ ಸರಿ.

ನಮಗೆ ಏನು ಬೇಕೋ ಅದನ್ನು ಈ ಪ್ರಕೃತಿ ಕೊಡುತ್ತದೆ. ಹಾಗಿರುವಾಗ ಅದನ್ನು ಉಪಯೋಗಿಸುವ ನಮಗೆ ಕೃತಜ್ಞತೆ ಬೇಕು. ಅದನ್ನು ಬಿಟ್ಟು 'ಇದು ನನ್ನದು' ಎಂದು ಅಧಿಕಾರ ಅಹಂಕಾರ ತೋರಿದರೆ ಉದ್ಧಾರವಿಲ್ಲ. ಪ್ರಕೃತಿ ಕೊಟ್ಟದ್ದನ್ನು ಕೃತಜ್ಞತೆ ಸಲ್ಲಿಸದೇ ಪಡೆದುಕೊಂಡು 'ಇದು ನನ್ನದು' ಎನ್ನುವವನು ಕಳ್ಳನೇ ಸರಿ!

ಯಜ್ಞಶಿಷ್ಟಾಶಿನಃ ಸಂತೋ ಮುಚ್ಯಂತೇ ಸರ್ವಕಿಲ್ಬಿಷೈಃ ।
ಭುಂಜತೇ ತೇ ತ್ವಘಂ ಪಾಪಾ ಯೇ ಪಚಂತ್ಯಾತ್ಮಕಾರಣಾತ್ ॥೧೩॥

ಯಜ್ಞ ಶಿಷ್ಟ ಅಶಿನಃ ಸಂತಃ ಮುಚ್ಯಂತೇ ಸರ್ವ ಕಿಲ್ಬಿಷೈಃ ।
ಭುಂಜತೇ ತೇ ತು ಅಘಮ್ ಪಾಪಾಃ ಯೇ ಪಚಂತಿ ಆತ್ಮ ಕಾರಣಾತ್- ದೇವತೆಗಳಿಗೆ ಸಲ್ಲಿಸಿ ಉಳಿದದ್ದನ್ನು ಉಣ್ಣುವ ಸಜ್ಜನರು ಎಲ್ಲಾ ಪಾಪಗಳಿಂದ ಪಾರಾಗುತ್ತಾರೆ. ತಮಗಾಗಿ ಅನ್ನ ಬೇಯಿಸುವವರು ತಮ್ಮ ಪಾಪವನ್ನೇ ತಾವು ತಿನ್ನುತ್ತಾರೆ.

ಯಾರು ಪಡೆದದ್ದನ್ನು ಭಗವದರ್ಪಣೆ ಮಾಡಿ ಅದನ್ನು ಭಗವಂತನ ಪ್ರಸಾದವೆಂದು ಸ್ವೀಕರಿಸುತ್ತಾರೊ, ಅವರು ಬದುಕಿನ ಎಲ್ಲಾ ಕೊಳೆಗಳಿಂದ ಬಿಡುಗಡೆಗೊಂಡು ಸ್ವಚ್ಛ ಬದುಕಿಂದ ಬಾಳುತ್ತಾರೆ. ಯಾರ ಮನೆಯಲ್ಲಿ ತಮಗೋಸ್ಕರ ಅನ್ನ ಬೇಯುತ್ತದೋ, ಅವನು ತಿನ್ನುವುದು ಅನ್ನವನ್ನಲ್ಲ ಪಾಪವನ್ನು. ನಮಗೆ ಈ ಆಹಾರವನ್ನು ಕೊಟ್ಟವನು ಆ ಭಗವಂತ. ಅವನಿಗೆ ನಾವು ಮೊದಲು ಕೃತಜ್ಞತೆಯನ್ನು ತೋರಬೇಕು. ಅದನ್ನು ಬಿಟ್ಟು ಇದು ನನ್ನ ಸಂಪಾದನೆ, ನಾನ್ಯಾಕೆ ಇದನ್ನು ಇನ್ನೊಬ್ಬರಿಗೆ ಹಂಚಬೇಕು ಎನ್ನುವ ಭಾವನೆಯನ್ನು ಬೆಳೆಸಿಕೊಂಡರೆ ನಾವು ನಮ್ಮ ಪಾಪದ ಗಂಟನ್ನು ಬೆಳೆಸಿಕೊಳ್ಳುತ್ತೇವೆ. ಸೃಷ್ಟಿಯ ಉದ್ದೇಶ(Divine Will)ದಂತೆ ನಡೆದುಕೊಳ್ಳದೇ ಇದ್ದರೆ ನಾವು ಗಳಿಸಿದ್ದೂ ಸಹ ನಮಗೆ ದಕ್ಕುವುದಿಲ್ಲ.

ಅನ್ನಾದ್ ಭವಂತಿ ಭೂತಾನಿ ಪರ್ಜನ್ಯಾದನ್ನಸಂಭವಃ ।
ಯಜ್ಞಾದ್ ಭವತಿ ಪರ್ಜನ್ಯೋ ಯಜ್ಞಃ ಕರ್ಮಸಮುದ್ಭವಃ ॥೧೪॥

ಅನ್ನಾತ್ ಭವಂತಿ ಭೂತಾನಿ ಪರ್ಜನ್ಯಾತ್ ಅನ್ನ ಸಂಭವಃ ।
ಯಜ್ಞಾತ್ ಭವತಿ ಪರ್ಜನ್ಯಃ ಯಜ್ಞಃ ಕರ್ಮ ಸಮುದ್ಭವಃ -ಜೀವಿಗಳ ಹುಟ್ಟು ಆಹಾರದಿಂದ; ಆಹಾರದ ಬೆಳೆ ಸೂರ್ಯನಿಂದ[ಮೋಡದಿಂದ]. ಸೌರಶಕ್ತಿಯ ವೃದ್ಧಿ [ಮೋಡದ ಹುಟ್ಟು]-ಯಜ್ಞದಿಂದ; ಯಜ್ಞದ ನಿರ್ವಹಣೆ-ಕರ್ಮದಿಂದ.

ಕರ್ಮ ಬ್ರಹ್ಮೋದ್ಭವಂ ವಿದ್ಧಿ ಬ್ರಹ್ಮಾಕ್ಷರಸಮುದ್ಭವಮ್ ।
ತಸ್ಮಾತ್ ಸರ್ವಗತಂ ಬ್ರಹ್ಮ ನಿತ್ಯಂ ಯಜ್ಞೇ ಪ್ರತಿಷ್ಠಿತಮ್ ॥೧೫॥

ಕರ್ಮ ಬ್ರಹ್ಮಉದ್ಭವಮ್ ವಿದ್ಧಿ ಬ್ರಹ್ಮ ಅಕ್ಷರ ಸಮುದ್ಭವಮ್ ।
ತಸ್ಮಾತ್ ಸರ್ವ ಗತಮ್ ಬ್ರಹ್ಮ ನಿತ್ಯಮ್ ಯಜ್ಞೇ ಪ್ರತಿಷ್ಠಿತಮ್ - ಕರ್ಮದ ನಿಷ್ಪತ್ತಿ ಭಗವಂತನಿಂದ; ಭಗವಂತನ ಅಭಿವ್ಯಕ್ತಿ- ವೇದಾಕ್ಷರದಿಂದ. ಆದ್ದರಿಂದ ಎಲ್ಲೆಡೆಯಿರುವ ಭಗವಂತ ಸದಾ ಯಜ್ಞದಲ್ಲಿ ನೆಲೆಸಿದ್ದಾನೆ.

ಏವಂ ಪ್ರವರ್ತಿತಂ ಚಕ್ರಂ ನಾನುವರ್ತಯತೀಹ ಯಃ।
ಅಘಾಯುರಿಂದ್ರ ಯಾರಾಮೋ ಮೋಘಂ ಪಾರ್ಥ ಸ ಜೀವತಿ ॥೧೬॥

ಏವಂ ಪ್ರವರ್ತಿತಮ್ ಚಕ್ರಮ್ ನ ಅನುವರ್ತಯತಿ ಇಹ ಯಃ |
ಅಘ ಆಯಃ ಇಂದ್ರಿಯ ಆರಾಮಃ ಮೋಘಮ್ ಪಾರ್ಥ ಸಃ ಜೀವತಿ -ಹೀಗೆ ಜಗದ ಗಾಲಿಯನ್ನು ಮುಂದುವರಿಸದವನು ಪಾಪದ ಬದುಕಲ್ಲಿ ಬದುಕುತ್ತಾ ಇಂದ್ರಿಯ ಸುಖದಲ್ಲೇ ಮೈಮರೆತವನು. ಓ ಪಾರ್ಥಾ, ಅಂತವನ ಬದುಕು ವ್ಯರ್ಥ.

ಜೀವಜಾತದ ಹುಟ್ಟು ಆಹಾರದಿಂದ. ಆಹಾರವಿಲ್ಲದೇ ಬದುಕಿಲ್ಲ. ಈ ಆಹಾರ ಸಿಗುವುದು ಬೆಳೆಯಿಂದ. ಬೆಳೆಗೆ ಮೂಲ ಸೌರಶಕ್ತಿ ಮತ್ತು ಮಳೆ. ಮಳೆ ಬರುವುದು ಯಜ್ಞದಿಂದ, ನಾವು ಮಾಡುವ ಪ್ರಾಮಾಣಿಕ ಬದುಕಿನಿಂದ, ಭಗವದರ್ಪಣ ಬುದ್ಧಿಯಿಂದ. ಯಜ್ಞದ ನಿರ್ವಹಣೆ ಕರ್ಮದಿಂದ, ನಮ್ಮ ಕ್ರಿಯಾಶೀಲತೆಯಿಂದ. ಕರ್ಮ ಎಂದರೆ ಕರ್ತವ್ಯಕರ್ಮ, ಪ್ರಾಮಾಣಿಕ ಕ್ರಿಯೆ. ಇಂತಹ ಕರ್ಮ ನಡೆಯುವುದು ಭಗವಂತನಿಂದ. ಈ ಭಗವಂತ(ಬ್ರಹ್ಮ) ನೆಲೆಸಿರುವುದು ವೇದ(ಅಕ್ಷರ)ದಲ್ಲಿ. ವೇದ ಇರುವುದು ಜೀವ ಜಾತಗಳಲ್ಲಿ(ಮನುಷ್ಯನಲ್ಲಿ). ಆದ್ದರಿಂದ ಇದೊಂದು ಚಕ್ರ. ಮಾನವ<->ಆಹಾರ<->ಮಳೆ<->ಯಜ್ಞ<->ಭಗವಂತ<->ವೇದ<-> ಮಾನವ. ಇಲ್ಲಿ ವೇದ ಎಂದರೆ ವೇದ ಮಂತ್ರವನ್ನು ಬಾಯಿಪಾಠ ಮಾಡುವುದಲ್ಲ. ವೈದಿಕ ವಾಙ್ಮಯದ ಎಚ್ಚರ-ಪ್ರಜ್ಞೆ. ಈ ಚಕ್ರದಲ್ಲಿ ನಾವು ನಮ್ಮ ಕರ್ಮವನ್ನು ತೊರೆಯುವಂತಿಲ್ಲ. ಕರ್ಮವನ್ನು ಸದಾ ಯಜ್ಞವಾಗಿ, ಭಗವದರ್ಪಣವಾಗಿ ಮಾಡಬೇಕು. ಭಗವಂತನ ಎಚ್ಚರ, ವೈದಿಕ ವಾಙ್ಮಯ ಪ್ರಜ್ಞೆ ಎಲ್ಲವೂ ಸಮನಾಗಿದ್ದರೆ ಮಳೆ, ಮಳೆಯಿಂದ ಬೆಳೆ, ಬೆಳೆಯಿಂದ ಜೀವನ. ಈ ಚಕ್ರವನ್ನು ಯಾರು ಮುಂದುವರಿಸಿಕೊಂಡು ಹೋಗುವುದಿಲ್ಲವೋ ಅವನು ವಿಶ್ವ ಚಕ್ರದ ನಡೆಯನ್ನು ಮುರಿದವನು, ಸಮಾಜದ ಸಹಜ ನಡೆಗೆ ಅಡ್ಡಗಾಲು ಹಾಕಿದವನು. ಅಂತವನು ಬರಿಯ ಇಂದ್ರಿಯ ಸುಖ ಭೋಗದಲ್ಲಿ ಮೈಮರೆತು ತನ್ನ ಜೀವನವನ್ನು ವ್ಯರ್ಥ ಮಾಡಿಕೊಳ್ಳುತ್ತಾನೆ.

ಇಲ್ಲಿ ಹೇಳಿರುವ ಈ ವಿಶ್ವಚಕ್ರದ ಎಚ್ಚರ ನಮಗೆ ನಮ್ಮ ದೈನಂದಿನ ಕಾರ್ಯದಲ್ಲಿ ಇದ್ದರೆ ನಮ್ಮ ಜೀವನ ಸಾರ್ಥಕ. ನಾವು ಸದಾ ಆ ವಿಶ್ವಶಕ್ತಿಯ ನಡೆಯನ್ನು ಅನುಸರಿಸಿದರೆ ನಮ್ಮ ಉದ್ಧಾರ ಸದಾಸಿದ್ಧ. ಎಂದೂ ಯಾವ ವಿಚಾರವಾಗಿಯೂ ನಾವು ಭಯ ಪಡುವ ಅಗತ್ಯವಿಲ್ಲ. ನಮ್ಮ ದೈನಂದಿನ ಬದುಕನ್ನು ಒಂದು ಯಜ್ಞವಾಗಿ ಮಾಡಿಕೊಂಡು, ಭಗವಂತನ ಪ್ರಜ್ಞೆಯಲ್ಲಿ ಬದುಕುವುದನ್ನು ನಾವು ರೂಢಿಸಿಕೊಳ್ಳಬೇಕು. ಇದು ನಿಜವಾದ ಕರ್ಮಯೋಗ. ಇದುವೇ ಮೋಕ್ಷದ ನಡೆ. ಇದು ಭಗವಂತನನ್ನು ಸೇರುವ ಮಾರ್ಗ.

ಈ ವಿಶ್ವದಲ್ಲಿ ಎಲ್ಲವೂ ಒಂದಕ್ಕೊಂದು ಹೊಂದಿಕೊಂಡಿದೆ(Inter dependent). ಒಂದು ಇನ್ನೊಂದರ ಸಹಾಯದಿಂದ ನಿಂತಿದೆ. ಯಾವುದೂ ಸ್ವತಂತ್ರ ಅಲ್ಲ (Interlinked not independent). ಪ್ರತಿಯೊಂದು ಪುಟ್ಟ ಕ್ರಿಯೆಯಲ್ಲೂ ಇಡೀ ವಿಶ್ವದ ಶಕ್ತಿಗಳು ಪರೋಕ್ಷವಾಗಿ ಪಾಲ್ಗೊಳ್ಳುತ್ತವೆ. ನಾವು ಉಣ್ಣುವ ಆಹಾರದ ಹಿಂದೆ ಅನೇಕ ಋಣಗಳಿವೆ. ಅದನ್ನು ನೆನಪಿಸದೇ ಇದ್ದರೆ ವಿಶ್ವ ಶಕ್ತಿಗೆ ಕೃತಘ್ನರಾದಂತೆ.

ವಿಶ್ವದ ನಡೆಯ 'ಕರ್ಮಚಕ್ರ'; ಅದರಲ್ಲಿ ನಮ್ಮ 'ಕರ್ತವ್ಯಕರ್ಮ'; ನಮ್ಮ 'ಯಜ್ಞ ಯಾಗಾದಿಗಳು'-ಈ ಬಗ್ಗೆ ವಿವರವಾಗಿ ಕೃಷ್ಣ ಹೇಳಿದ. ಆದರೆ ಇಲ್ಲಿ ನಮಗೆ ಒಂದು ಪ್ರಶ್ನೆ ಮೂಡಬಹುದು. ಅದೇನೆಂದರೆ: ಹಿಂದೆ ಕೃಷ್ಣ

ಜ್ಞಾನವನ್ನು ಶ್ರೇಷ್ಠ ಎಂದು ಹೇಳಿದ್ದ, ಆದರೆ ಕರ್ಮವನ್ನು ಬಿಟ್ಟಿಲ್ಲ ಎಂತಲೂ ಹೇಳಿದ. ಆದರೆ ಶಾಸ್ತ್ರದಲ್ಲಿ ಜ್ಞಾನಿಗಳಿಗೆ ಕರ್ಮ ಬೇಡ ಎಂದು ಹೇಳಿದೆ. ಏನಿದರ ಅರ್ಥ? ಕೃಷ್ಣ ನಮ್ಮ ಈ ಪ್ರಶ್ನೆಯನ್ನು ಆತನೇ ಎತ್ತಿಕೊಂಡು ಮುಂದಿನ ಶ್ಲೋಕದಲ್ಲಿ ಉತ್ತರ ಕೊಡುತ್ತಾನೆ. ಒಬ್ಬ ಅಂತರಂಗದಲ್ಲಿ ಯಜ್ಞ ಮಾಡತಕ್ಕವನಿಗೆ ಕರ್ಮವಿದೆಯೋ? ಅವನು ಕರ್ಮ ಮಾಡದಿದ್ದರೆ ಲೋಪವಿದೆಯೋ? ಮನುಷ್ಯ ಕರ್ಮ ಬಂಧನವಿಲ್ಲದೇ ಇರುವ ಸ್ಥಿತಿ ಯಾವುದು? ಮೋಕ್ಷಕ್ಕೆ ಮೊದಲು ಸಂಸಾರಿಕ ಸ್ಥಿತಿಯಲ್ಲಿ ಕರ್ಮ ಮಾಡದೇ ಇರುವುದು ಸಾಧ್ಯವೋ? ಕರ್ಮವಿಲ್ಲದೆ ಸಂಪೂರ್ಣ ಅಂತರಂಗದ ಸ್ಥಿತಿಯಲ್ಲಿರುವುದು ಸಾಧ್ಯವೋ? ಇತ್ಯಾದಿ ಪ್ರಶ್ನೆಗಳಿಗೆ ಮುಂದೆ ಕೃಷ್ಣ ವಿವರಣೆ ಕೊಟ್ಟಿದ್ದಾನೆ.

ಯಸ್ತ್ವಾತ್ಮರತಿರೇವ ಸ್ಯಾದಾತ್ಮತೃಪ್ತಶ್ಚ ಮಾನವಃ।
ಆತ್ಮನ್ಯೇವ ಚ ಸಂತುಷ್ಟಸ್ತಸ್ಯ ಕಾರ್ಯಂ ನ ವಿದ್ಯತೇ ॥೧೭॥

ಯಃ ತು ಆತ್ಮ ರತಿಃ ಏವ ಸ್ಯಾತ್ ಆತ್ಮ ತೃಪ್ತಃ ಚ ಮಾನವಃ ।
ಆತ್ಮನಿ ಏವ ಚ ಸಂತುಷ್ಟಃ ತಸ್ಯ ಕಾರ್ಯಮ್ ನ ವಿದ್ಯತೇ- ಪರಮಾತ್ಮನನ್ನು ಕಂಡು (ಪರಮಾತ್ಮನ ಕರುಣೆಯಿಂದ) ಸುಖವುಂಡವನು, ಪರಮಾತ್ಮನ ಕಾಣ್ಕೆಯಿಂದ(ಕರುಣೆಯಿಂದ) ಕೃತಕೃತ್ಯನಾದವನು, ಬೇರಾವುದೂ ಬೇಡವೆನಿಸಿ ಪರಮಾತ್ಮನಲ್ಲೇ ಆನಂದವಾಗಿರುವ ಸಮಾಧಿಮಗ್ನನು(ತೃಪ್ತನಾಗುವ ಮುಕ್ತನು) ಮಾತ್ರವೆ ಮಾಡಬೇಕಾದ್ದೇನೂ ಇರುವುದಿಲ್ಲ.

ಭಗವಂತನನ್ನು ಅಂತರಂಗದಲ್ಲಿ ಕಂಡು ಪಡುವ ಆನಂದ 'ಆತ್ಮರತಿ'. ಈ ಸ್ಥಿತಿಯನ್ನು ಸಮಾಧಿಸ್ಥಿತಿಯಲ್ಲಿ ತಲುಪಬಹುದು. ನಿಜವಾದ ಸಮಾಧಿ ಸ್ಥಿತಿಯಲ್ಲಿ ನಮ್ಮ ಇಂದ್ರಿಯಗಳು ಮತ್ತು ಮನಸ್ಸು ಕೆಲಸ ಮಾಡುವುದಿಲ್ಲ. ಜ್ಞಾನಸ್ವರೂಪವಾದ 'ಜೀವಸ್ವರೂಪ' ನೇರವಾಗಿ ಭಗವಂತನನ್ನು ಕಾಣುವ ಸ್ಥಿತಿ 'ಸಮಾಧಿಸ್ಥಿತಿ'. ಈ ಸ್ಥಿತಿಯಲ್ಲಿ ಭಗವಂತನೊಡನೆ ನೇರ ಸಂಪರ್ಕ ಸಾಧ್ಯ. ಇಂತಹ ಸ್ಥಿತಿಯಲ್ಲಿರುವವನಿಗೆ ಯಾವುದೇ ಕರ್ಮದ ಲೇಪವಿಲ್ಲ. ದೇವರನ್ನು ಕಂಡ ಮೇಲೆ ಆತನಿಗೆ ಈ ಲೌಕಿಕ ಪ್ರಪಂಚ ತೃಪ್ತಿಯಾಗಿ ಅದು ಬೇಡವೆನಿಸುತ್ತದೆ. ಕೇವಲ ಭಗವಂತನ ಸಾಕ್ಷಾತ್ಕಾರದ ಆನಂದ ಸಾಗರದಲ್ಲಿ ಆತ ಮುಳುಗಿರುತ್ತಾನೆ. ಈ ಸ್ಥಿತಿಯಲ್ಲಿ ಆತನಿಗೆ ಯಾವುದೇ ಕರ್ತವ್ಯ ಕರ್ಮವಿಲ್ಲ, ಆತ ವಿಧಿ ನಿಷೇಧಗಳಿಂದ ಅತೀತನಾಗಿರುತ್ತಾನೆ.

ನೈವ ತಸ್ಯ ಕೃತೇನಾರ್ಥೋ ನಾಕೃತೇನೇಹ ಕಶ್ಚನ ।
ನಚಾಸ್ಯ ಸರ್ವಭೂತೇಷು ಕಶ್ಚಿದರ್ಥವ್ಯಪಾಶ್ರಯಃ ॥೧೮॥

ನ ಏವ ತಸ್ಯ ಕೃತೇನ ಅರ್ಥಃ ನ ಅಕೃತೇನ ಇಹ ಕಶ್ಚನ ।
ನ ಚ ಅಸ್ಯ ಸರ್ವಭೂತೇಷು ಕಶ್ಚಿತ್ ಅರ್ಥ ವ್ಯಪಾಶ್ರಯಃ -ಅಂತವನು ಏನನ್ನಾದರೂ ಮಾಡುವುದರಿಂದ ಹೆಚ್ಚಿನ ಸಾಧಕವಾಗಲೀ, ಮಾಡದೇ ಇರುವುದರಿಂದ ಯಾವುದೇ ಬಾಧಕವಾಗಲೀ ಇಲ್ಲ. ಸಮಸ್ತ ಜೀವಿಗಳಲ್ಲಿ ಅವನಿಗೆ ಯಾವುದೇ ಫಲದ ಹಂಗಿಲ್ಲ.

ಸಮಾಧಿ ಸ್ಥಿತಿಯಲ್ಲಿ ಅವನಿಗೆ ಹಸಿವು, ಬಾಯಾರಿಕೆ ಇಲ್ಲ. ಆತನಿಗೆ ಹೊರ ಪ್ರಪಂಚದ ಅರಿವೇ ಇರುವುದಿಲ್ಲ. ಇಂತಹ ಸ್ಥಿತಿಯಲ್ಲಿರುವಾಗ ಇನ್ಯಾವುದೋ ಸಾಧನೆ ಮಾಡುವುದರಿಂದ ಉದ್ಧಾರವಾಗಲೀ, ಕರ್ತವ್ಯಕರ್ಮ ಮಾಡದೇ ಇರುವ ದೋಷವಾಗಲೀ ಇರುವುದಿಲ್ಲ. ಪಂಚಭೂತಗಳ, ಪಂಚಕೋಶಗಳ ಆಸರೆ ಕೂಡಾ ಅವನಿಗೆ ಬೇಕಾಗಿರುವುದಿಲ್ಲ. ಸಮಸ್ತ ಜನಾಂಗ, ಪರಿವಾರ ಎನ್ನುವ ಮಮಕಾರ ಈ ಸ್ಥಿತಿಯಲ್ಲಿ ಇರುವುದಿಲ್ಲ. ಆತನಿಗೆ ಹೊರ ಪ್ರಪಂಚದ ಹಂಗಿಲ್ಲ. ಈ ರೀತಿ ಸಮಾಧಿ ಸ್ಥಿತಿಯಿಂದ ದೇವರನ್ನು ಕಾಣುತ್ತಿರುವವನು ಕರ್ತವ್ಯ ಕರ್ಮದಿಂದ ಆಚೆಗಿರುತ್ತಾನೆ.

ತಸ್ಮಾದಸಕ್ತಃ ಸತತಂ ಕಾರ್ಯಂ ಕರ್ಮ ಸಮಾಚರ ।
ಅಸಕ್ತೋ ಹ್ಯಾಚರನ್ ಕರ್ಮ ಪರಮಾಪ್ನೋತಿ ಪೂರುಷಃ ॥೧೯॥

ತಸ್ಮಾತ್ ಅಸಕ್ತಃ ಸತತಂ ಕಾರ್ಯಮ್ ಕರ್ಮ ಸಮಾಚರ ।
ಅಸಕ್ತಃ ಹಿ ಆಚರನ್ ಕರ್ಮ ಪರಮ್ ಆಪ್ನೋತಿ ಪೂರುಷಃ -ಆದ್ದರಿಂದ ಫಲದ ನಂಟು ತೊರೆದು ಸದಾ ಕರ್ತವ್ಯ ಕರ್ಮವನ್ನು ಮಾಡುತ್ತಿರು. ನಂಟು ತೊರೆದು ಕರ್ತವ್ಯದಲ್ಲಿ ತೊಡಗುವುದರಿಂದಲೇ ಸಾಧಕ ಭಗವಂತನನ್ನು ಸೇರುವುದು ಸಾಧ್ಯ.

ಈ ಎಲ್ಲಾ ಕಾರಣದಿಂದ ನಾವು ನಮ್ಮ ಕರ್ತವ್ಯ ಕರ್ಮವನ್ನು ಮಾಡಬೇಕು. "ಎಲ್ಲವನ್ನೂ ಮಾಡು, ಆದರೆ ಯಾವುದನ್ನೂ ಅಂಟಿಸಿಕೊಳ್ಳದೇ ಮಾಡು. ಏನು ಮಾಡಬೇಕೋ ಅದನ್ನು ಫಲದ ಬಗ್ಗೆ ಯೋಚಿಸದೆ(ಅಧಿಕಾರ ಸಾಧಿಸದೇ) ಮಾಡು. ಹೀಗೆ ಕರ್ಮ ಮಾಡಿದರೆ ಅದು ನಿನ್ನನ್ನು ಭಗವಂತನೆಡೆಗೆ ಕೊಂಡೊಯ್ಯುತ್ತದೆ. ಅದು ಎಂದೂ ನಿನ್ನನ್ನು ಮತ್ತೆ ಕರ್ಮ ಬಂಧನಕ್ಕೆ ತಳ್ಳುವುದಿಲ್ಲ. ಈ ರೀತಿ ಮಾಡುವುದರಿಂದ ಭಗವಂತನನ್ನು ಸೇರುವುದು ಸಾಧ್ಯ ಹೊರತು ಕರ್ಮ ತ್ಯಾಗದಿಂದಲ್ಲ "ಎನ್ನುತ್ತಾನೆ ಕೃಷ್ಣ.

ಇಲ್ಲಿ "ಪೂರುಷಃ" ಎನ್ನುವ ಪದ ಬಳಕೆಯಾಗಿದೆ. ಪುರದಲ್ಲಿ(ಪೂರ್ಣವಾದ ಶರೀರದಲ್ಲಿ) ಇರುವವ ಪುರುಷ. ಪುರವನ್ನು ಪೂರ್ಣ ಪ್ರಮಾಣದಲ್ಲಿ ಉಪಯೋಗಿಸುವ ಸಾಧಕ-ಪೂರುಷಃ. ಸಾಧನಾ ಶರೀರದಲ್ಲಿದ್ದು ಸಾಧನೆಯಲ್ಲಿ ತೊಡಗಿರುವ ಜೀವ ಪೂರುಷಃ.

ಈ ರೀತಿ ಕರ್ಮ ಸಿದ್ಧಾಂತವನ್ನು ವಿವರಿಸಿದ ಕೃಷ್ಣ ಅದಕ್ಕೆ ಪೂರಕವಾದ ನಿದರ್ಶನವನ್ನು ಮುಂದಿನ ಶ್ಲೋಕದಲ್ಲಿ ಕೊಡುತ್ತಾನೆ.

ಕರ್ಮಣೈವ ಹಿ ಸಂಸಿದ್ಧಿಮಾಸ್ಥಿತಾ ಜನಕಾದಯಃ ।
ಲೋಕಸಂಗ್ರಹಮೇವಾಪಿ ಸಂಪಶ್ಯನ್ ಕರ್ತುಮರ್ಹಸಿ ॥೨೦॥

ಕರ್ಮಣಾ ಏವ ಹಿ ಸಂಸಿದ್ಧಿಮ್ ಅಸ್ಥಿತಾಃ ಜನಕ ಅದಯಃ |
ಲೋಕಸಂಗ್ರಹಮ್ ಏವ ಅಪಿ ಸಂಪಶ್ಯನ್ ಕರ್ತುಮ್ ಅರ್ಹಸಿ -ಕರ್ಮದಿಂದಲೇ ಸಾಧಿಸಿ ಜನಕ ಮೊದಲಾದವರು ಗುರಿ ಮುಟ್ಟಿದರು. ಜನತೆಯನ್ನು ತಿದ್ದುವ ಹೊಣೆಯನ್ನರಿತಾದರೂ ನೀನು ಕರ್ಮ ಮಾಡಬೇಕಾಗಿದೆ.

ಹಿಂದಿನ ಅನೇಕ ರಾಜರ್ಷಿಗಳು ಈ ಮಾರ್ಗದಲ್ಲಿ ನಡೆದು ಮೋಕ್ಷ ಪಡೆದಿದ್ದಾರೆ. ಅವರ್ಯಾರೂ ಎಲ್ಲವನ್ನು ತ್ಯಜಿಸಿ ಕಾಡಿಗೆ ಹೋಗಿಲ್ಲ. ಇದಕ್ಕೆ ಉತ್ತಮ ಉದಾಹರಣೆ ಜನಕ ಮಹಾರಾಜ. ಈತ ಎಲ್ಲಾ ರಾಜ್ಯ ವೈಭೋಗದೊಂದಿಗೆ ರಾಜ್ಯಭಾರ ಮಾಡಿದ ವ್ಯಕ್ತಿ. ಆದರೆ ಅವನಷ್ಟು ದೊಡ್ಡ ಜ್ಞಾನಿ ಆ ಕಾಲದಲ್ಲಿ ಯಾರೂ ಇರಲಿಲ್ಲ. ಅಂಥಹ ಮಹಾ ರಾಜರ್ಷಿ ಆತ. ಶುಖಾಚಾರ್ಯರು ವೈರಾಗ್ಯದ ಬಗ್ಗೆ ಸರಿಯಾದ ತಿಳುವಳಿಕೆಗಾಗಿ ಜನಕನಲ್ಲಿಗೆ ಬಂದಿದ್ದರು! ಇದು ನಿಜವಾದ ಸಾಧಕನ ಬದುಕು. ಜನಕ ಎಲ್ಲಾ ಅಧಿಕಾರದ ಭೋಗದ ನಡುವೆ ಇದ್ದು, ವಿರಕ್ತನಾಗಿ ಬದುಕಿದವ. ಆದ್ದರಿಂದ ಕೃಷ್ಣ ಇಲ್ಲಿ ಜನಕನ ಹೆಸರನ್ನು ಪ್ರಸ್ತಾಪಿಸುತ್ತಾನೆ. ಕೃಷ್ಣ ಹೇಳುತ್ತಾನೆ: "ಜನಕ ಮುಂತಾದ ರಾಜರ್ಷಿಗಳು ಕರ್ಮಯೋಗದಿಂದಲೇ ಜ್ಞಾನ ಪಡೆದು, ಕರ್ಮ ಮಾಡುತ್ತಾ ಎತ್ತರಕ್ಕೇರಿದರೇ ಹೊರತು, ಕರ್ಮ ತ್ಯಾಗದಿಂದಲ್ಲ" ಎಂದು. ಈ ರೀತಿ ಸಮಾಜಕ್ಕೆ ಮಾರ್ಗದರ್ಶಿಯಾದ ನೀನು ಸಮಾಜಕ್ಕೋಸ್ಕರ ಯುದ್ಧ ಮಾಡು ಎಂದು ಹೇಳುತ್ತಿದ್ದಾನೆ ಕೃಷ್ಣ".
ಕರ್ತವ್ಯ ಕರ್ಮದ ಬಗ್ಗೆ ವಿವರವಾಗಿ ವಿವರಿಸಿದ ಕೃಷ್ಣ, ಈಗ ತಪ್ಪು ದಾರಿಯಲ್ಲಿ ಮುಂದಾಳು ನಡೆದಾಗ ಸಮಾಜದ ಮೇಲಾಗುವ ಪರಿಣಾಮದ ಬಗ್ಗೆ ಸ್ವತಃ ತನ್ನನ್ನೇ ಉದಾಹರಣೆಯಾಗಿಟ್ಟುಕೊಂಡು ಮುಂದಿನ ಶ್ಲೋಕಗಳಲ್ಲಿ ವಿವರಿಸುತ್ತಾನೆ.

ಯದ್ಯದಾಚರತಿ ಶ್ರೇಷ್ಠಸ್ತತ್ತದೇವೇತರೋ ಜನಃ ।
ಸ ಯತ್ ಪ್ರಮಾಣಂ ಕುರುತೇ ಲೋಕಸ್ತದನುವರ್ತತೇ ॥೨೧॥

ಯತ್ ಯತ್ ಆಚರತಿ ಶ್ರೇಷ್ಠಃ ತತ್ ತತ್ ಏವ ಇತರಃ ಜನಃ |
ಸಃ ಯತ್ ಪ್ರಮಾಣಮ್ ಕುರುತೇ ಲೋಕಃ ತತ್ ಅನುವರ್ತತೇ--ಮುಂದಾಳು ಏನೇನು ಮಾಡುತ್ತಾನೋ ಉಳಿದ ಮಂದಿ ಅದೇ ದಾರಿ ಹಿಡಿಯುತ್ತಾರೆ. ಅವನು ಯಾವುದನ್ನು ಆಧಾರವಾಗಿ ಬಳಸುತ್ತಾನೋ ಜನತೆ ಅದನ್ನೇ ಬೆನ್ನು ಹತ್ತುತ್ತದೆ.

ಸಮಾಜದಲ್ಲಿ ಹಿರಿಯನೆನಿಸಿದವ(ಶ್ರೇಷ್ಠ), ವಯಸ್ಸಿನಲ್ಲಿ, ಆಚರಣೆಯಲ್ಲಿ, ಜ್ಞಾನದಲ್ಲಿ ಸಮಾಜಕ್ಕೆ ಮಾರ್ಗದರ್ಶನ ಮಾಡಬಲ್ಲ, ಎತ್ತರದಲ್ಲಿರುವ ವ್ಯಕ್ತಿ ಯಾವ ದಾರಿಯಲ್ಲಿ ಸಾಗುತ್ತಾನೋ, ಉಳಿದವರೂ ಅದೇ ಹಾದಿಯಲ್ಲಿ ಸಾಗುತ್ತಾರೆ. ಇಲ್ಲಿ ಅರ್ಜುನ ಸಮಾಜದ ಮುಖಂಡ. ಆತ ಏನು ಮಾಡುತ್ತಾನೋ ಅದನ್ನೇ ಸಮಾಜ ಹಿಂಬಾಲಿಸುತ್ತದೆ. ಏಕೆಂದರೆ ಸಾಮಾನ್ಯ ಜನರಿಗೆ ಶಾಸ್ತ್ರ ಇತ್ಯಾದಿ ತಿಳಿಯುವುದಿಲ್ಲ. ಅವರು ಕೇವಲ ಆದರ್ಶ ವ್ಯಕ್ತಿಗಳೆನಿಸಿದವರನ್ನು ಹಿಂಬಾಲಿಸುತ್ತಾರೆ. ನಾಯಕನಾದವನು ಯಾವುದನ್ನು ಪ್ರಮಾಣವಾಗಿರಿಸಿಕೊಂಡು ಮಾಡುತ್ತಾನೋ ಅದನ್ನೇ ಸಾಮಾನ್ಯ ಜನರು ಅನುಸರಿಸುತ್ತಾರೆ.

ಈ ಶ್ಲೋಕದಲ್ಲಿ ಕೃಷ್ಣ ಕೊಟ್ಟಿರುವ ಸಂದೇಶವನ್ನು ನಾವು ನಮ್ಮ ದೈನಂದಿನ ಬದುಕಿನಲ್ಲಿ ಕಾಣುತ್ತೇವೆ. ಒಂದು ಸಂಸ್ಥೆಯನ್ನು ನಡೆಸುವ ಮುಖ್ಯಸ್ತನ ನಡವಳಿಕೆ, ಆಚರಣೆ ಸರಿದಾರಿಯಲ್ಲಿ ಇಲ್ಲದಿದ್ದರೆ, ಆ ಸಂಸ್ಥೆ ಅಧೋಗತಿಯನ್ನು ಕಾಣುತ್ತದೆ. ದುಷ್ಟ ಶಕ್ತಿಗಳು ಎದ್ದು ನಿಲ್ಲುತ್ತವೆ. ಏಕೆಂದರೆ ಮುಖಂಡ ಎನಿಸಿದವ ಏನನ್ನು ಅನುಸರಿಸುತ್ತಾನೋ ಅದನ್ನೇ ಪ್ರಮಾಣವಾಗಿ ಆತನ ಕೆಳಗಿರುವ ಜನರು ತಮಗರಿವಿಲ್ಲದಂತೆ ಅನುಸರಿಸಲಾರಂಭಿಸುತ್ತಾರೆ. ಈ ಕಾರಣದಿಂದ ಒಬ್ಬ ಮುಖಂಡ ಎಷ್ಟು ಎಚ್ಚರದಿಂದಿದ್ದರೂ ಸಾಲದು. ಒಂದು ದೇಶವನ್ನು ನಡೆಸುವ ಮುಖ್ಯಸ್ಥ ಬ್ರಷ್ಟಾಚಾರಿಯಾಗಿದ್ದಲ್ಲಿ ಇಡೀ ದೇಶ ಬ್ರಷ್ಟಾಚಾರದ ಹಾದಿಯನ್ನು ತುಳಿಯುವ ಸಾಧ್ಯತೆ ಇದೆ. ಸಾಮಾನ್ಯವಾಗಿ ಮಾನವರು ಒಳ್ಳೆಯದನ್ನು ಅನುಸರಿಸುವುದಕ್ಕಿಂತ ಹೆಚ್ಚಾಗಿ ಹಾಗೂ ವೇಗವಾಗಿ ಕೆಟ್ಟದ್ದನ್ನು ಅನುಸರಿಸುವುದು ಹೆಚ್ಚು. ಉದಾಹರಣೆಗೆ ಒಬ್ಬ ಉತ್ತಮ ಅಧ್ಯಾಪಕ ಧೂಮಪಾನ ಮಾಡುವ ಹವ್ಯಾಸದವನಾಗಿದ್ದರೆ, ಆತನ ವಿದ್ಯಾರ್ಥಿಗಳು ಆತನಲ್ಲಿರುವ ಜ್ಞಾನಕ್ಕಿಂತ ಮಿಗಿಲಾಗಿ ಆತನ ದುರಾಭ್ಯಾಸವನ್ನು ಪ್ರಮಾಣವಾಗಿರಿಸಿಕೊಂಡು ಕೆಟ್ಟ ದಾರಿ ಹಿಡಿಯುವ ಸಾಧ್ಯತೆ ಹೆಚ್ಚು. ಇದು ಹಿರಿಯವರೆನಿಸಿದವರು ತಪ್ಪು ದಾರಿ ತುಳಿದಾಗ ಸಮಾಜದ ಮೇಲಾಗುವ ದುಷ್ಪರಿಣಾಮ. ಇದು ತುಂಬಾ ಅಪಾಯಕಾರಿ-ಈ ಅರಿವು ನಮಗಿರಬೇಕು.

ನ ಮೇ ಪಾರ್ಥಾಸ್ತಿ ಕರ್ತವ್ಯಂ ತ್ರಿಷು ಲೋಕೇಷು ಕಿಂಚನ ।
ನಾನವಾಪ್ತಮವಾಪ್ತವ್ಯಂ ವರ್ತ ಏವ ಚ ಕರ್ಮಣಿ ॥೨೨॥

ನ ಮೇ ಪ್ರಾರ್ಥ ಅಸ್ತಿ ಕರ್ತವ್ಯಮ್ ತ್ರಿಷು ಲೋಕೇಷು ಕಿಂಚನ |
ನ ಅನವಾಪ್ತಮ್ ಅವಾಪ್ತವ್ಯಮ್ ವರ್ತೇ ಏವ ಚ ಕರ್ಮಣಿ -- ಪಾರ್ಥಾ, ಮೂರು ಲೋಕಗಳಲ್ಲೂ ನಾನು ಮಾಡಬೇಕಾದ್ದೂ ಏನೂ ಇಲ್ಲ. ಪಡೆಯದೇ ಇದ್ದು ಪಡೆಯಬೇಕಾದದ್ದೂ ಇಲ್ಲ. ಆದರೂ ನಾನು ಕರ್ಮದಲ್ಲಿ ತೊಡಗಿದ್ದೇನೆ.

ಯದಿ ಹ್ಯಹಂ ನ ವರ್ತೇಯಂ ಜಾತು ಕರ್ಮಣ್ಯತಂದ್ರಿತಃ ।
ಮಮ ವರ್ತ್ಮಾನುವರ್ತಂತೇ ಮನುಷ್ಯಾಃ ಪಾರ್ಥ ಸರ್ವಶಃ ॥೨೩॥

ಯದಿ ಹಿ ಅಹಮ್ ನ ವರ್ತೇಯಮ್ ಜಾತು ಕರ್ಮಣಿ ಅತಂದ್ರಿತಃ
ಮಮ ವರ್ತ್ಮ ಅನುವರ್ತಂತೇ ಮನುಷ್ಯಾಃ ಪಾರ್ಥ ಸರ್ವಶಃ -- ಓ ಪಾರ್ಥಾ, ನಾನು ಎಂದಾದರೂ ಎಚ್ಚರದಿಂದ ಕರ್ಮದಲ್ಲಿ ತೊಡಗದೇ ಹೋದರೆ, ಮನುಷ್ಯರು ಎಲ್ಲಾ ಬಗೆಯಿಂದಲೂ ನನ್ನ ದಾರಿ ಹಿಡಿದು ಬಿಡುತ್ತಾರೆ.

ಉತ್ಸೀದೇಯುರಿಮೇ ಲೋಕಾ ನ ಕುರ್ಯಾಂ ಕರ್ಮ ಚೇದಹಮ್ ।
ಸಂಕರಸ್ಯ ಚ ಕರ್ತಾ ಸ್ಯಾಮುಪಹನ್ಯಾಮಿಮಾಃ ಪ್ರಜಾಃ ॥೨೪॥

ಉತ್ಸೀದೇಯುಃ ಇಮೇ ಲೋಕಾಃ ನ ಕುರ್ಯಾಮ್ ಕರ್ಮ ಚೇತ್ ಅಹಮ್ ।
ಸಂಕರಸ್ಯ ಚ ಕರ್ತಾ ಸ್ಯಾಮ್ ಉಪಹನ್ಯಾಮ್ ಇಮಾಃ ಪ್ರಜಾಃ -- ನಾನು ಕರ್ಮ ಮಾಡದೇ ಇದ್ದರೆ ಈ ಜನರೆಲ್ಲಾ ದಾರಿ ತಪ್ಪಿ ಹಾಳಾಗುತ್ತಾರೆ. ಧರ್ಮದ ಕಲಬೆರೆಕೆಗೆ ಕಾರಣನಾಗಿ ಈ ಎಲ್ಲಾ ಜನತೆಯನ್ನು ನಾನೇ ಕೈಯಾರ ಕೆಡವಿದಂತಾದೀತು.

ಈ ಮೇಲಿನ ಮೂರು ಶ್ಲೋಕದಲ್ಲಿ ಕೃಷ್ಣ ತನ್ನನ್ನೇ ತಾನು ಉದಾಹರಣೆಯಾಗಿಟ್ಟುಕೊಂಡು ಹಿಂದೆ ಹೇಳಿದ ವಿಷಯವನ್ನು ವಿವರಿಸುತ್ತಾನೆ. ಅರ್ಜುನನ ಸಾರಥಿಯಾಗಿ ನಿಂತಿರುವ ಕೃಷ್ಣ ಹೇಳುತ್ತಾನೆ- "ನನಗೆ ಏನಾದರೂ ಮಾಡಬೇಕಾದ್ದು ಅಥವಾ ಮಾಡದೇ ಇದ್ದರೆ ತೊಂದರೆ ಆಗುವಂತಾದ್ದು ಏನೂ ಇಲ್ಲ, ಆದರೆ ನಾನು ಕರ್ತವ್ಯ ಕರ್ಮದಲ್ಲಿ ನಿಂತಿದ್ದೇನೆ" ಎಂದು. ಮೂರು ಲೋಕದಲ್ಲಿ, ಸೃಷ್ಟಿ-ಸ್ಥಿತಿ-ಸಂಹಾರವನ್ನು ತನ್ನ ನಿತ್ಯ ಕರ್ಮವಾಗಿ ಮಾಡುತ್ತಿರುವ ಭಗವಂತ, ಎಲ್ಲವನ್ನು ತನ್ನ ಪ್ರೀತಿಯ ಭಕ್ತರಿಗಾಗಿ, ಜೀವಜಾತಕ್ಕಾಗಿ ಮಾಡುತ್ತಿದ್ದಾನೆಯೇ ಹೊರತು ಇನ್ನೇನೋ ಲಾಭಕ್ಕಾಗಿ ಅಲ್ಲ.
ಒಂದು ವೇಳೆ ಕೃಷ್ಣ ತನ್ನನ್ನು ನಿತ್ಯ ಕರ್ಮದಲ್ಲಿ ತೊಡಗಿಸಿಕೊಳ್ಳದೇ ಇದ್ದಿದ್ದರೆ ಎಲ್ಲರೂ ಆತನನ್ನು ಪ್ರಮಾಣವಾಗಿರಿಸಿಕೊಂಡು ಆತನ ದಾರಿಯನ್ನು ಹಿಡಿಯುತ್ತಿದ್ದರು. ಈ ಕಾರಣಕ್ಕಾಗಿ ಭಗವಂತ ಅವತಾರ ತಾಳಿದಾಗ ಒಬ್ಬ ಸಾಮಾನ್ಯ ಮಾನವನಂತೆ ಕಾಣಿಸಿಕೊಂಡು, ತನ್ನ ನಿತ್ಯ ಕರ್ಮಗಳನ್ನು, ಕರ್ತವ್ಯ ಕರ್ಮವನ್ನು ನಿರ್ವಹಿಸುತ್ತಾನೆ. ಕೃಷ್ಣಾವತಾರದಲ್ಲಿ ನೋಡಿದರೆ ಕೃಷ್ಣ ಸಂಧ್ಯಾವಂದನೆ ಇತ್ಯಾದಿ ಮೂಲ ಕರ್ಮವನ್ನು ತಪ್ಪದೇ ಮಾಡುತ್ತಿದ್ದ. ಇದು ಆತನಿಗೋಸ್ಕರವಲ್ಲ, ಆತನನ್ನು ಹಿಂಬಾಲಿಸುವ ಜನರಿಗೆ ಮಾರ್ಗದರ್ಶನಕ್ಕೋಸ್ಕರ.
ಕೃಷ್ಣ ಹೇಳುತ್ತಾನೆ "ನಾನು ಕರ್ಮ ಮಾಡದೇ ಇದ್ದರೆ ಇಡೀ ಲೋಕ ಕರ್ಮ ಪ್ರಜ್ಞೆಯನ್ನು ಕಳೆದುಕೊಂಡು ದಾರಿತಪ್ಪಿಬಿಡುತ್ತದೆ, ಸ್ವಚ್ಛಂದತೆ ಬಂದು ನಿರ್ದಿಷ್ಟ ವ್ಯವಸ್ಥೆ ಹೊರಟು ಹೋಗುತ್ತದೆ" ಎಂದು. ಯಾರಿಗೆ ಯಾವುದು ಧರ್ಮವೋ ಅದನ್ನು ಮಾಡಲೇ ಬೇಕು. ಅದೊಂದು ವ್ಯವಸ್ಥೆ. ಇಲ್ಲದಿದ್ದರೆ ಎಲ್ಲರೂ ತಮಗೆ ತೋಚಿದಂತೆ ಮಾಡಲಾರಂಭಿಸಿಬಿಡುತ್ತಾರೆ. "ಇದರಿಂದ ಅವ್ಯವಸ್ಥೆ ತಾಂಡವವಾಡುತ್ತದೆ ಹಾಗೂ ಅದಕ್ಕೆ ಜವಾಬ್ದಾರಿ ನಾವಾಗುತ್ತೇವೆ" ಎನ್ನುತ್ತಾನೆ ಕೃಷ್ಣ.

ಸಕ್ತಾಃ ಕರ್ಮಣ್ಯವಿದ್ವಾಂಸೋ ಯಥಾ ಕುರ್ವಂತಿ ಭಾರತ।
ಕುರ್ಯಾದ್ ವಿದ್ವಾಂಸ್ತಥಾಸಕ್ತಶ್ಚಿಕೀರ್ಷುರ್ಲೋಕಸಂಗ್ರಹಮ್ ॥೨೫॥

ಸಕ್ತಾಃ ಕರ್ಮಣಿ ಅವಿದ್ವಾಂಸಃ ಯಥಾ ಕುರ್ವಂತಿ ಭಾರತ ।
ಕುರ್ಯಾತ್ ವಿದ್ವಾನ್ ತಥಾ ಅಸಕ್ತಃ ಚಿಕೀರ್ಷುಃ ಲೋಕ ಸಂಗ್ರಹಮ್ -- ಓ ಭಾರತಾ, ತಿಳಿಯದ ಮಂದಿ ಫಲದ ನಂಟಿಗಾಗಿ ಕರ್ಮಗಳನ್ನು ಮಾಡುತ್ತಾರೆ ಹೇಗೋ, ಹಾಗೇ ತಿಳಿದವನೂ ಕರ್ಮ ಮಾಡುತ್ತಿರಬೇಕು-ಫಲದ ನಂಟು ತೊರೆದು, ಸಮಾಜವನ್ನು ತಿದ್ದುವುದಕ್ಕಾಗಿ.

ತಿಳುವಳಿಕೆ ಇಲ್ಲದವರು ಫಲಾಪೇಕ್ಷೆಯಿಂದ ಕರ್ಮ ಮಾಡುತ್ತಾರೆ. ಆದರೆ ತಿಳಿದವನು, ಜ್ಞಾನಿ, ಯಾವುದೇ ಫಲದ ಅಧಿಕಾರ ಸಾಧಿಸದೇ, ನಿಷ್ಕಾಮ ಕರ್ಮ ಮಾಡುತ್ತಿರಬೇಕು. "ನಾನು ನನ್ನ ಕಣ್ಮುಂದೆ ಬೆಳೆಯುತ್ತಿರುವ ಜನಾಂಗಕ್ಕೆ ಮಾರ್ಗದರ್ಶಕನಾಗಿ ಭಗವಂತನ ಸೇವೆ ಮಾಡುತ್ತಿದ್ದೇನೆ, ನನಗೆ ಇದರಿಂದ ಭಗವಂತ ಏನು ಕೊಟ್ಟರೂ ಸಂತೋಷ" ಎಂಬ ಸಂಕಲ್ಪದಿಂದ ಕರ್ಮ ಮಾಡಬೇಕು. ಇದು ನಿಜವಾದ ಕರ್ಮಯೋಗ.

ನ ಬುದ್ಧಿಭೇದಂ ಜನಯೇದಜ್ಞಾನಾಮ್ ಕರ್ಮಸಂಗಿನಾಮ್ ।
ಜೋಷಯೇತ್ ಸರ್ವಕರ್ಮಾಣಿ ವಿದ್ವಾನ್ ಯುಕ್ತಃ ಸಮಾಚರನ್ ॥೨೬॥

ನ ಬುದ್ಧಿ ಭೇದಮ್ ಜನಯೇತ್ ಅಜ್ಞಾನಾಮ್ ಕರ್ಮ ಸಂಗಿನಾಮ್ ।
ಜೋಷಯೇತ್ ಸರ್ವ ಕರ್ಮಾಣಿ ವಿದ್ವಾನ್ ಯುಕ್ತಃ ಸಮಾಚರನ್--ತಿಳುವಳಿಕೆಯಿಲ್ಲದೆ ಫಲದ ನಂಟಿಗಾಗಿಯೇ ಕರ್ಮ ಮಾಡುವ ಮಂದಿಯ ನಂಬಿಕೆಯನ್ನು ನಲುಗಿಸಬಾರದು. ಉಪಾಯ ಬಲ್ಲ ತಿಳಿದವನು ತಾನು ಎಲ್ಲಾ ಕರ್ಮಗಳನ್ನು ಮಾಡುತ್ತಾ ಅವರನ್ನು ಒಲೈಸಬೇಕು.

ಸಮಾಜದಲ್ಲಿ ಅನೇಕ ತರದ ಜನರಿರುತ್ತಾರೆ. ಎಲ್ಲರಿಗೂ ತಿಳುವಳಿಕೆ ಇರುವುದಿಲ್ಲ. ಅವರು ಅವರ ನಂಬಿಕೆಗೆ ತಕ್ಕಂತೆ ನೆಡೆದುಕೊಳ್ಳುತ್ತಿರುತ್ತಾರೆ. ತಿಳಿದವನಿಗೆ ಅದು ಮೂಢನಂಬಿಕೆಯಾಗಿ ಕಾಣಬಹುದು. ಆದರೆ ಎಂದೂ ಒಮ್ಮೆಗೇ ಹೋಗಿ ಅಂತಹ ಜನರನ್ನು ಪರಿಹಾಸ್ಯ ಮಾಡಬಾರದು. ಒಬ್ಬ ಒಂದು ಕಲ್ಲನ್ನು ಅದಕ್ಕೊಂದು ಹೆಸರನ್ನು ಕೊಟ್ಟು ದೇವರೆಂದು ಪೂಜಿಸುತ್ತಿರಬಹುದು. ಆತನ ಅಪಾರ ನಂಬಿಕೆ ಶರಣಾಗತಿ ಆತನನ್ನು ರಕ್ಷಿಸುತ್ತಿರುತ್ತದೆ. ಇದನ್ನು ನೋಡಿ ಪರಿಹಾಸ್ಯ ಮಾಡುವುದು ಮೂಢತನ. ಅವರು ಇಂತಹ ನಂಬಿಕೆಯ ನೆಲಗಟ್ಟಿನಲ್ಲಿ ಜೀವನದಲ್ಲಿ ಭರವಸೆಯಿಂದ ಬದುಕುತ್ತಿರುತ್ತಾರೆ.ಅವರಿಗೊಂದು ಸನಾತನ ಪ್ರಜ್ಞೆ ಇರುತ್ತದೆ. ಸರ್ವಗತ, ಸರ್ವಶಬ್ದವಾಚ್ಯ ಹಾಗೂ ಸರ್ವಶಕ್ತ ಭಗವಂತ ಆತನಿಗೆ ಕಲ್ಲಿನ ಮುಖೇನ ರಕ್ಷಣೆ ಕೊಡಲೂ ಸಾಧ್ಯವಿದೆಯಲ್ಲವೇ? ಆದ್ದರಿಂದ ಎಂದೂ ಅಂತವರನ್ನು ನೋಡಿ ನಗಬಾರದು. ಅದನ್ನು ಬಿಟ್ಟು ಅವನನ್ನು ಕ್ರಮೇಣವಾಗಿ ಜ್ಞಾನದ ಪರಿದಿಗೆ ತರುವ ಪ್ರಯತ್ನವನ್ನು ಮಾಡಬೇಕು. ಎಲ್ಲವನ್ನು ಸಾಮಾಜಿಕ ಕಾಳಜಿಯಿಂದ ಮಾಡಬೇಕು, ಆದರೆ ನಿರ್ಲಿಪ್ತನಾಗಿ ಎಲ್ಲಾ ಕರ್ಮವನ್ನು ಮಾಡುತ್ತಾ ಅಜ್ಞಾನಿಗಳಲ್ಲಿ ಜ್ಞಾನವನ್ನು ತುಂಬಬೇಕು.

ಪ್ರಕೃತೇಃ ಕ್ರಿಯಮಾಣಾನಿ ಗುಣೈಃ ಕರ್ಮಾಣಿ ಸರ್ವಶಃ ।
ಅಹಂಕಾರವಿಮೂಢಾತ್ಮಾ ಕರ್ತಾಹಮಿತಿ ಮನ್ಯತೇ ॥೨೭॥

ಪ್ರಕೃತೇಃ ಕ್ರಿಯಮಾಣಾನಿ ಗುಣೈಃ ಕರ್ಮಾಣಿ ಸರ್ವಶಃ ।
ಅಹಂಕಾರವಿಮೂಢ ಆತ್ಮಾ ಕರ್ತಾ ಅಹಮ್ ಇತಿ ಮನ್ಯತೇ--ಪ್ರಕೃತಿಯ ಅಂಗಾಂಗಗಳಾದ ಇಂದ್ರಿಯಾದಿಗಳಿಂದ(ಭಗವದಧೀನವಾದ, ಜೀವನ ಸ್ವಭಾವ ಸಹಜವಾದ ಗುಣಗಳಿಂದ) ಎಲ್ಲಾ ಬಗೆಯ ಕರ್ಮಗಳೂ ನಡೆಯುತ್ತಿರುತ್ತವೆ. ಹಮ್ಮಿನಿಂದ ಮೈಮರೆತವನು 'ನಾನೇ ಮಾಡಿದೆ' ಎಂದು ತಿಳಿಯುತ್ತಾನೆ.

ಈ ಶ್ಲೋಕ ಅನೇಕ ವಿಧದಲ್ಲಿ ತೆರೆದುಕೊಳ್ಳುತ್ತದೆ. ಇಲ್ಲಿ ಕೃಷ್ಣ ಮುಖ್ಯವಾಗಿ 'ನಾನೇ ಮಾಡಿದೆ' ಎಂದು ಅಹಂಕಾರ ಪಡುವುದು ಎಷ್ಟು ತಪ್ಪು ಮತ್ತು ಏಕೆ ಎನ್ನುವುದನ್ನು ವಿವರಿಸಿದ್ದಾನೆ. ಕೃಷ್ಣ ಹೇಳುತ್ತಾನೆ "ಯಾರಾದರೂ ಏನನ್ನಾದರೂ 'ನಾನೇ ಮಾಡಿದೆ' ಎಂದು ತಿಳಿದುಕೊಂಡರೆ ಅದು ಅವನ ತಿಳಿಗೇಡಿತನ" ಎಂದು. ಸೃಷ್ಟಿಯಲ್ಲಿನ ಒಂದು ವಿಚಿತ್ರವೆಂದರೆ ಯಾರೂ ಏನನ್ನೂ ಮಾಡುವುದಿಲ್ಲ-ಆದರೆ ಎಲ್ಲವೂ ಎಲ್ಲರ ಕೈಯಿಂದ ಆಗುತ್ತಿರುತ್ತದೆ! ಈ ದೇಹ (ಪಿಂಡಾಂಡ) ಪ್ರಕೃತಿಯ ನಿರ್ಮಾಣ. ಪ್ರಕೃತಿಯಲ್ಲಿ ಅದಕ್ಕೆ ಪೋಷಕವಾದ ಅಂಗಭೂತವಾದ ಇಂದ್ರಿಯಗಳಿವೆ. ಪ್ರಕೃತಿ ಎಂದರೆ ಈ ದೇಹ, ಅದರ ಗುಣಗಳು ಎಂದರೆ ಇಂದ್ರಿಯಗಳು. ಶಬ್ದ-ಸ್ಪರ್ಶ-ರಸ-ರೂಪ-ಗಂಧ; ಕಿವಿ-ತೊಗಲು-ನಾಲಿಗೆ-ಕಣ್ಣು-ಮೂಗು; ಅದಕ್ಕೆ ಅನುಗುಣವಾಗಿ ಆಕಾಶ(ಶಬ್ದ), ಗಾಳಿ(ಸ್ಪರ್ಶ), ನೀರು(ರಸ), ಅಗ್ನಿ (ರೂಪ), ಮತ್ತು ಮಣ್ಣು(ಗಂಧ) ಇವು ಪ್ರಕೃತಿಯ ಗುಣಗಳು. ಹೀಗಿರುವಾಗ ನಾವು ಯಾವುದೋ ಒಂದು ವಿಷಯವನ್ನು ನಾನೇ ಮಾಡಿದೆ ಎಂದು ಹೇಳುವುದು ಅರ್ಥ ಶೂನ್ಯ. ಉದಾಹರಣೆಗೆ 'ಕಣ್ಣಿನಿಂದ ನೋಡಿದೆ'; ಈ ಕಣ್ಣನ್ನು ನಮಗೆ ಕೊಟ್ಟವನು ಯಾರು? ಹುಟ್ಟು ಕುರುಡನಿಗೆ ಕಣ್ಣು ಕೊಡಲು ನಿನಗೆ ಸಾಧ್ಯವೇ? ಅಂದರೆ ಕಣ್ಣು ಪ್ರಕೃತಿಯ ಕೊಡುಗೆ. ಭಗವಂತ ನಮಗೆ ಕಣ್ಣು ಕೊಟ್ಟ, ಕಣ್ಣ ಮುಂದೆ ನೋಡುವ ವಸ್ತುವನ್ನಿಟ್ಟ, ನೋಡುವಂತೆ ಪ್ರೇರೇಪಿಸಿದ- ನಾವು ನೋಡಿದೆವು! ಒಂದು ವೇಳೆ ನಮಗೆ ಒಳ್ಳೆಯ ಸ್ವರವಿದ್ದರೆ ಅದಕ್ಕಾಗಿ ಅಹಂಕಾರ ಪಡುತ್ತೇವೆ. ಆದರೆ ಈ ಸ್ವರವನ್ನು ನಮಗೆ ಕೊಟ್ಟವನು ಯಾರು? ಈ ಬಗ್ಗೆ ಎಂದೂ ನಾವು ಯೋಚಿಸುವುದಿಲ್ಲ. ಒಂದು ಕಾರ್ಯವಾಗಬೇಕಾದರೆ ಇಡೀ ವಿಶ್ವದ ಅನೇಕ ಘಟಕಗಳು ಸೇರಿ ಕಾರ್ಯ ನಿರ್ವಹಿಸಬೇಕು. ಪ್ರಕೃತಿ ಜಡ ಅದಕ್ಕೆ ಇಚ್ಛೆ ಇಲ್ಲ. 'ನಾವು ಮಾಡುವುದು' ಅಂದರೆ ಇಚ್ಛಿಸಿ ಮಾಡುವುದು. ನಮಗೆ ಇಚ್ಛೆ ಇದೆ; ಪ್ರತಿಯೊಬ್ಬ ಜೀವನಿಗೂ ಅವನದೇ ಆದ ಜೀವ ಸ್ವಭಾವವಿದೆ. ನಾವು ಮಾಡುವ ಪ್ರತಿಯೊಂದು ಕಾರ್ಯ ನಮ್ಮ ಜೀವ ಸ್ವಭಾವಕ್ಕೆ ಅನುಗುಣವಾಗಿರುತ್ತದೆ. ಇದು ಇಚ್ಛಾ ಪೂರ್ವಕ ಕ್ರಿಯೆ. ನಮಗೆ ಇಚ್ಛೆ ಇದೆ ಆದರೆ ಇಚ್ಛಾ ಸ್ವಾತಂತ್ರ್ಯವಿಲ್ಲ.

ಇಚ್ಛಾಸ್ವಾತಂತ್ರ್ಯ ಇರುವುದು ಕೇವಲ ಭಗವಂತನಲ್ಲಿ. ಅದಕ್ಕನುಗುಣವಾಗಿ ಸರ್ವಕಾರ್ಯ ನಿರ್ವಹಣೆ ಆಗುತ್ತದೆ. ಆದ್ದರಿಂದ ನಮ್ಮ ಸ್ವಭಾವವನ್ನು ನಿಯಂತ್ರಿಸುವವ ಇಡೀ ಜಗತ್ತಿನ ಮೂಲ ಕರ್ತೃ ಭಗವಂತ. ಅವನ ಇಚ್ಛೆಗನುಗುಣವಾಗಿ ಪ್ರಪಂಚದ ವ್ಯಾಪಾರ ನಡೆಯುತ್ತದೆ. ಇದು ವಿಶ್ವದ ವ್ಯವಸ್ಥೆ. ಇಡೀ ವಿಶ್ವದ ಕರ್ಮ ಚಕ್ರದಲ್ಲಿ ನಾವು ಒಂದು ಘಟಕ ಅಷ್ಟೆ. ಆದ್ದರಿಂದ 'ನಾನೇ ಮಾಡಿದೆ' ಎಂದು ಅಹಂಕಾರ ಪಡುವುದರಲ್ಲಿ ಯಾವ ಅರ್ಥವೂ ಇಲ್ಲ. ನಿಜವಾದ ಕರ್ತೃ ಭಗವಂತ. ಜೀವನಿಗೊಂದು ಕರ್ತೃತ್ವ ಹಾಗೂ ಜಡಕ್ಕೊಂದು ಕರ್ತೃತ್ವವಿದೆ. ಇದರ ಅಂತರ ನಮಗೆ ತಿಳಿದಿರಬೇಕು. ಮಣ್ಣು ಜಡ ಅದಕ್ಕೆ ಇಚ್ಛೆ ಇಲ್ಲ. ಬೀಜ ಚೇತನ, ಅದಕ್ಕೆ ಮರವಾಗುವ ಸ್ವಭಾವವಿದೆ ಆದರೆ ಸ್ವಾತಂತ್ರ್ಯವಿಲ್ಲ. ಬೀಜವನ್ನು ಬಿತ್ತಿ ಬೆಳೆಸುವ ತೋಟಗಾರ ಆ ಭಗವಂತ. ಭಗವಂತನ ಇಚ್ಛೆಗನುಗುಣುವಾಗಿ, 'ಜೀವ' ನಲ್ಲಿರುವ ಸ್ವಭಾವಕ್ಕನುಗುಣವಾಗಿ ಪ್ರಪಂಚದಲ್ಲಿ ಕ್ರಿಯೆ ನಡೆಯುತ್ತದೆ. ಒಂದು ಕ್ರಿಯೆಯ ಹಿಂದೆ ಇಡೀ ವಿಶ್ವದ ಪಾಲುದಾರಿಕೆ ಇರುತ್ತದೆ.

ತತ್ತ್ವವಿತ್ತು ಮಹಾಬಾಹೋ ಗುಣಕರ್ಮವಿಭಾಗಯೋಃ ।
ಗುಣಾ ಗುಣೇಷು ವರ್ತಂತ ಇತಿ ಮತ್ವಾ ನ ಸಜ್ಜತೇ ॥೨೮॥

ತತ್ತ್ವವಿತ್ ತು ಮಹಾಬಾಹೋ ಗುಣ ಕರ್ಮ ವಿಭಾಗಯೋಃ |
ಗುಣಾಃ ಗುಣೇಷು ವರ್ತಂತೇ ಇತಿ ಮತ್ವಾ ನ ಸಜ್ಜತೇ- ಓ ಮಹಾವೀರಾ, ಇಂದ್ರಿಯಾದಿಗಳ(ಜೀವ ಸ್ವಭಾವದ ಗುಣಗಳ) ಮತ್ತು ಕ್ರಿಯೆಗಳ ಪ್ರಭೇದಗಳ ನಿಜವನ್ನರಿತವನು, ಇಂದ್ರಿಯಗಳ ವಿಷಯಗಳಲ್ಲಿ ಚರಿಸುತ್ತವೆ ಎಂದರಿತು ಅವುಗಳನ್ನು ಅಂಟಿಸಿಕೊಳ್ಳುವುದಿಲ್ಲ.

ತತ್ವವನ್ನು ಅರಿತ ಅಥವಾ ಯಥಾರ್ಥವನ್ನು ಅರಿತ ತತ್ವವಾದಿ-ಗುಣಕರ್ಮ, ಇಂದ್ರಿಯ ಮತ್ತು ಅದರಲ್ಲಿನ ಕ್ರಿಯಾಭೇದವನ್ನು ತಿಳಿದಿರಬೇಕು. ಮೂಲಭೂತವಾಗಿ ಇಂದ್ರಿಯಗಳಲ್ಲಿ ಸಾತ್ವಿಕ, ರಾಜಸ ಮತ್ತು ತಾಮಸವೆಂಬ ತ್ರೈಗುಣ್ಯಗಳಿಂದ ಕರ್ಮ ನಡೆಯುತ್ತಿರುತ್ತದೆ. ಇದು ನಾವು ಹಿಂದೆ ಅಂಟಿಸಿಕೊಂಡು ಬಂದುದರ ಪ್ರಭಾವವಿರಬಹುದು. ಇದರಿಂದ ಆಗುವ ಕರ್ಮವನ್ನು ನಾವು ತಟಸ್ಥರಾಗಿ ನೋಡುತ್ತಿರಬೇಕು. ಈ ವಿಷಯ ಮನೋಶಾಸ್ತ್ರಕ್ಕೆ ಸಂಬಂಧಪಟ್ಟದ್ದು. ನಾವೇ ಮಾಡುವ ಕ್ರಿಯೆಯನ್ನು ನಾವೇ ತಟಸ್ಥರಾಗಿ ವಿಶ್ಲೇಷಿಸುವುದು! ನನ್ನ ಮೇಲೆ ತ್ರೈಗುಣ್ಯದ ಯಾವ ಗುಣ ಪ್ರಭಾವಬೀರುತ್ತಿದೆ ಎನ್ನುವುದನ್ನು ಸ್ವಯಂ ವಿಶ್ಲೇಷಣೆ(Self analysis) ಮಾಡಿ, ಗುಣಕರ್ಮ ವಿಭಾಗ ತತ್ವವನ್ನು ತಿಳಿದುಕೊಂಡಾಗ, ತ್ರೈಗುಣ್ಯದ ಪ್ರಭಾವದ ಅರಿವಾಗುತ್ತದೆ. ಆಗ ನಮಗೆ ಅದರಲ್ಲಿ ಒಡೆತನವಿಲ್ಲ ಎನ್ನುವ ಸತ್ಯ ತಿಳಿಯುತ್ತದೆ.ಇಂದ್ರಿಯಗಳು- ಅದರ ಮೇಲೆ ಪ್ರಕೃತಿಯ ತ್ರೈಗುಣ್ಯ- ಅದರ ಮೇಲೆ ಜೀವ ಸ್ವಭಾವ-ಅದರ ಮೇಲೆ ಭಗವಂತನ ಜ್ಞಾನಾನಂದ- ಇವೆಲ್ಲವೂ ಕರ್ಮವಾಗಿ ಇಂದ್ರಿಯದ ಮೂಲಕ ಅಭಿವ್ಯಕ್ತವಾಗುತ್ತಿರುತ್ತದೆ. ಜಡದಲ್ಲಿ ಬರಿಯ ಕೃತಿ(Action), ಜೀವನಲ್ಲಿ ಇಚ್ಛೆ ಮತ್ತು ಕೃತಿ (Intentional Action) ಹಾಗೂ ಭಗವಂತನಲ್ಲಿ ಸ್ವತಂತ್ರ ಇಚ್ಛಾಕೃತಿ(Independent Intentional Action)-ಇದು ಕರ್ಮಭೇದ. ಹೀಗೆ ಗುಣಭೇದ ಮತ್ತು ಕರ್ಮಭೇದವನ್ನು ಅರಿತವನು 'ತತ್ತ್ವವಿತ್'. ಈ ತತ್ವ ಅರ್ಥವಾದರೆ "ನಾನು ಮಾಡಿದೆ" ಎನ್ನುವ ಅಹಂಕಾರ ಎಂದೂ ನಮ್ಮನ್ನು ಕಾಡುವುದಿಲ್ಲ.
ಈ ಮೇಲಿನ ವಿಷಯವನ್ನು ಉದಾಹರಣೆಯೊಂದಿಗೆ ನೋಡುವುದಾದರೆ-ಸ್ವಾರಸ್ಯವಾಗಿ, ವಿಷಯಗರ್ಭಿತವಾಗಿ ಮಾತನಾಡುವ ಒಬ್ಬ ಮಾತುಗಾರನನ್ನು ನೋಡಿ: ಆತ ಹೀಗೆ ಮಾತನಾಡಬೇಕಾದರೆ ಕೇವಲ ಬಾಯಿ ಇದ್ದರೆ ಸಾಲದು, ಬಾಯಿಯಲ್ಲಿ ಶಬ್ದ ಬರಬೇಕು. ಕೇವಲ ಶಬ್ದವಲ್ಲ-ಯಾವ ಮಾತನಾಡಬೇಕೋ ಅದಕ್ಕನುಗುಣವಾದ ಶಬ್ದ ಬರಬೇಕು. ಆ ಶಬ್ದ ಬರಬೇಕಾದರೆ ಮಾತಿಗೆ ಒಂದು ಭಾವ ಬೇಕು. ಭಾವ ಅನ್ನುವುದು ಮನಸ್ಸಿನಲ್ಲಿ ಹೊಳೆಯಬೇಕು. ಹೊಳೆದ ಭಾವಕ್ಕೆ ತಕ್ಕಂತೆ ಶಬ್ದ ಬರಬೇಕು. ಆ ಶಬ್ದ ಬಾಯಿಯಲ್ಲಿ ಸ್ಪುಟವಾಗಿ ಹೊರ ಹೊಮ್ಮಬೇಕು. ಭಾವನೆಯಿಂದ ಶಬ್ದ ಹುಟ್ಟಬೇಕಾದರೆ ಮಾಧ್ಯಮವಾಗಿ ಆಕಾಶ ಮತ್ತು ಗಾಳಿ ಅಗತ್ಯ. ಈ ಎಲ್ಲಾ ಕ್ರಿಯೆ ಸುಸೂತ್ರವಾಗಿ ನಡೆದರೆ ಮಾತ್ರ ಆತ ಚೆನ್ನಾಗಿ ಮಾತನಾಡಬಲ್ಲ. ಮನಸ್ಸಿನಲ್ಲಿ ಭಾವ ಮತ್ತು ಶಬ್ದವನ್ನು ಹೊಳೆಸುವವನು ಯಾರು? ಒಂದು ವೇಳೆ ಹೇಳಬೇಕು ಅನ್ನುವ ವಿಷಯಕ್ಕೆ ಅನುಗುಣವಾದ ಶಬ್ದ ಹೊಳೆಯದೇ ಇದ್ದರೆ? ನಮ್ಮ ಮೆದುಳಿನಲ್ಲಿ ಯಾವುದೋ ಒಂದು ಗುಂಡಿ ಆ ಕ್ಷಣದಲ್ಲಿ ಕೆಲಸ ಮಾಡದೇ ಇದ್ದರೆ? ಇಲ್ಲಿ ನಮ್ಮ ಕೈವಾಡ ಏನಿದೆ? ಇದು ತಿಳಿದಾಗ ಅಹಂಕಾರ ಬಾರದು. ಈ ಅರಿವಿದ್ದಾಗ ಎಲ್ಲರೊಡನೆ ಎಲ್ಲರಂತೆ ಇದ್ದು ಅಂಟಿಸಿಕೊಳ್ಳದೇ ಇರಲು ಸಾಧ್ಯ.
ಇಂದ್ರಿಯಗಳಲ್ಲಿ ಸತ್ವ-ರಜೋ-ತಮೋ ಗುಣಗಳು ಜೀವ ಸ್ವಭಾವಕ್ಕನುಗುಣವಾಗಿ ಕೆಲಸ ಮಾಡುತ್ತವೆ. ಭಗವಂತನ ಜ್ಞಾನಾನಂದ ಸ್ವರೂಪ- ಜೀವನ ಜ್ಞಾನೇಂದ್ರಿಯ ಗುಣಗಳನ್ನು ನಿಯಂತ್ರಿಸುತ್ತವೆ. ಇದನ್ನು ತಿಳಿದಾಗ

ನಾನು-ನನ್ನದು ಎನ್ನುವುದು ಹೊರಟು ಹೋಗುತ್ತದೆ. ವಿಶ್ವವೆಂಬ ಈ ಮಹಾ ಸಾಗರದಲ್ಲಿ ನಾನೊಂದು ಮರಳಿನ ಕಣ ಎನ್ನುವ ನಿಜ ತಿಳಿಯುತ್ತದೆ. ವಿಶ್ವದ ವಿಶ್ವತೋಮುಖವಾದ ಅಸ್ತಿತ್ವ ಗುರುತಿಸಿದವ "ನಾನು ಮಾಡಿದೆ" ಎಂದು ಎಂದೂ ಹೇಳುವುದಿಲ್ಲ ಹಾಗೂ ಯಾವುದನ್ನೂ ಅಂಟಿಸಿಕೊಳ್ಳು(Attachment)ವುದಿಲ್ಲ.

ಈ ಶ್ಲೋಕದಲ್ಲಿ ಕೃಷ್ಣ ಅರ್ಜುನನನ್ನು 'ಮಹಾಬಾಹೋ' ಎಂದು ಸಂಬೋಧಿಸಿದ್ದಾನೆ. ಮೇಲ್ನೋಟದಲ್ಲಿ ಮಹಾಬಾಹು ಎಂದರೆ ವೀರ, ಹೋರಾಟಗಾರ. ಬಲಿಷ್ಠ ತೋಳಿನವನಾದ ನೀನು ಹೇಡಿಯಾಗದೇ ಹೋರಾಡು ಎನ್ನುವುದು ಇಲ್ಲಿ ಕಾಣುವ ಭಾವ. ಆದರೆ ಅದರಿಂದಾಚೆಗೆ ಇನ್ನೂ ಅನೇಕ ಅರ್ಥವಿದೆ. 'ಮಹತ್ ವಹತೀತಿ ಮಹಾಬಾಹು'. ಅಂದರೆ ದೊಡ್ಡದ್ದನ್ನು ಹೊತ್ತುಕೊಂಡವ. ಜಗತ್ತಿನ ಮೂಲಭೂತವಾದ ಸತ್ಯವನ್ನು ಹೃದಯದಲ್ಲಿ ಹೊತ್ತವ ಎಂದರ್ಥ. "ಜಗತ್ತಿನ ಮಹತ್ತಾದ ಸಂಗತಿಯನ್ನು ಗ್ರಹಿಸಬಲ್ಲ ಅರಿವಿನ ಮಹಾತೋಳಿನಿಂದ ದಿಗಂತದಾಚೆಗಿನ ಸತ್ಯ(ಭಗವಂತ)ವನ್ನು ಹಿಡಿ" ಎನ್ನುವುದು ಈ ಸಂಬೋಧನೆಯ ಹಿಂದಿರುವ ಇನ್ನೊಂದು ಭಾವ.

ಪ್ರಕೃತೇರ್ಗುಣ ಸಮ್ಮೂಢಾ ಸಜ್ಜಂತೇ ಗುಣಕರ್ಮಸು ।
ತಾನಕೃತ್ಸ್ನವಿದೋ ಮಂದಾನ್ ಕೃತ್ಸ್ನವಿನ್ನ ವಿಚಾಲಯೇತ್ ॥೨೯॥

ಪ್ರಕೃತೇಃ ಗುಣ ಸಮ್ಮೂಢಾಃ ಸಜ್ಜಂತೇ ಗುಣಕರ್ಮಸು ।
ತಾನ್ ಅಕೃತ್ಸ್ನವಿದಃ ಮಂದಾನ್ ಕೃತ್ಸ್ನವಿತ್ ನ ವಿಚಾಲಯೇತ್ -- ಪ್ರಕೃತಿಯ ಅಂಗಾಂಗಗಳಾದ ಇಂದ್ರಿಯಾದಿಗಳಲ್ಲೇ ಮೈಮರೆತವರು ಇಂದ್ರಿಯಾದಿಗಳ ಕ್ರಿಯೆಯಲ್ಲೇ ಅಂಟಿಕೊಳ್ಳುತ್ತಾರೆ. ಪೂರ್ತಿ ನಿಜವನ್ನರಿಯದ ಅಂತಹ ಮಂದಿಯನ್ನು ಪೂರ್ತಿ ಅರಿತವರು ಗೊಂದಲಗೆಡಿಸಬಾರದು.

ಪ್ರಕೃತಿಯ ಗುಣಭೂತವಾಗಿರುವ ಇಂದ್ರಿಯ ಸುಖದಲ್ಲಿ ಮುಳುಗಿದವರು; ಮೂಲ ಪ್ರಕೃತಿಯ ತ್ರಿಗುಣದ ಮೋಹಕ್ಕೊಳಗಾಗಿ, ಸತ್ಯವನ್ನರಿಯದೇ, ಮೋಹದಲ್ಲಿರುವವರು; ತಾನು ಭಗವಂತನ ಗುಣದ ಅಧೀನ ಎನ್ನುವ ಎಚ್ಚರ ಇಲ್ಲದೇ ಇರುವವರು- ಇವರನ್ನು ಕೃಷ್ಣ 'ಪ್ರಕೃತೇರ್ಗುಣ ಸಮ್ಮೂಢಾಃ' ಎಂದು ಕರೆದಿದ್ದಾನೆ. ಇಂಥವರು ಭಗವಂತನ ಗುಣ ಕರ್ಮವನ್ನು ತಮ್ಮದೇ ಎಂದು ಭ್ರಮಿಸಿಕೊಂಡು, 'ನಾನೇ ಎಲ್ಲಾ ನನ್ನಿಂದಲೇ ಎಲ್ಲಾ' ಎಂದು ಬದುಕುತ್ತಿರುತ್ತಾರೆ. ಇಂತವರಿಗೆ ಸತ್ಯವನ್ನು ಅಥವಾ ಪೂರ್ಣವನ್ನು ಅರಿಯುವ ಯೋಗ್ಯತೆ ಇರುವುದಿಲ್ಲ. ಅಂತವರನ್ನು 'ಪೂರ್ಣವನ್ನು ಅರಿತವರು' ಗೊಂದಲಗೆಡಿಸಲು ಹೋಗಬಾರದು. ಅವರಲ್ಲಿ ಸತ್ಯವನ್ನು ತಿಳಿಯುವ ಯೋಗ್ಯತೆ ಇದ್ದರೆ ಅವರು ಆ ಸ್ಥಿತಿಯಿಂದಾಚೆಗೆ ಬರುತ್ತಾರೆ. ಇಲ್ಲದ ಯೋಗ್ಯತೆಯನ್ನು ಯಾರೂ ಅವರಲ್ಲಿ ತುಂಬಿಸಲಾರರು; ಇದ್ದ ಯೋಗ್ಯತೆಯನ್ನು ಯಾರೊಬ್ಬರೂ ಕಸಿಯಲಾರರು. ಯಾರಿಗೆ ಸತ್ಯವನ್ನು ತಿಳಿಯುವ ಅಪೇಕ್ಷೆ ಇದೆಯೋ ಅವರೊಂದಿಗೆ ಸೇರಿ ಅವರ ಸಹವಾಸ ಮಾಡಿ ಅವರಿಂದ ಕಲಿಯಬಹುದು ಅಥವಾ ಅವರಿಗೆ ತಿಳಿಹೇಳಬಹುದು.

ಮಯಿ ಸರ್ವಾಣಿ ಕರ್ಮಾಣಿ ಸಂನ್ಯಸ್ಯಾಧ್ಯಾತ್ಮಚೇತಸಾ ।

ನಿರಾಶೀರ್ನಿರ್ಮಮೋ ಭೂತ್ವಾ ಯುಧ್ಯಸ್ವ ವಿಗತಜ್ವರಃ ॥೩೦॥

ಮಯಿ ಸರ್ವಾಣಿ ಕರ್ಮಾಣಿ ಸಂನ್ಯಸ್ಯ ಅಧ್ಯಾತ್ಮ ಚೇತಸಾ ।
ನಿರಾಶೀಃ ನಿರ್ಮಮಃ ಭೂತ್ವಾ ಯುಧ್ಯಸ್ವ ವಿಗತ ಜ್ವರಃ-ಎಲ್ಲಾ ಕರ್ಮಗಳನ್ನು ನನ್ನಲ್ಲಿ ಅರ್ಪಿಸಿ, ನನ್ನಲ್ಲೇ ಮನವಿಟ್ಟು, ಹಂಬಲ ತೊರೆದು, ಮಮಕಾರ ತೊರೆದು,ಚಳಿ ಬಿಟ್ಟು ಹೋರಾಡು.

ಕೃಷ್ಣ ಹೇಳುತ್ತಾನೆ "ನೀನು ಮಾಡುವ ಸರ್ವಕರ್ಮವನ್ನು ನನಗರ್ಪಿಸಿ ಕರ್ಮ ಮಾಡು" ಎಂದು. ಇಲ್ಲಿ 'ಸಂನ್ಯಸ್ಯ' ಎನ್ನುವ ಪದ ಬಳಕೆಯಾಗಿದೆ. ನಾನು ಮಾಡಿದ್ದೆಲ್ಲವೂ ನಾನೇ ಮಾಡಿದ್ದಲ್ಲ. ಏನು ಕ್ರಿಯೆ ನನ್ನಿಂದಾಯಿತೋ ಅದು ನನ್ನ ಕೈಯಿಂದ ಭಗವಂತ ಮಾಡಿಸಿದ್ದು. ಏನು ನನ್ನ ಮೂಲಕ ನಡೆಯಿತೋ ಅದು ಭಗವಂತನ ಪೂಜೆ ಎನ್ನುವ ಸಮರ್ಪಣಾ ಭಾವ ಸಂನ್ಯಾಸ. "ನಾಹಂ ಕರ್ತಾ ಹರಿ ಕರ್ತಾ; ಹರಿ ಕರ್ತಾ ಹಿ ಕೇವಲಮ್" ; "ನನ್ನ ಬಾಯಿಯಿಂದ ಏನು ಬಂತೋ ಅದು ನಿನ್ನ ಸ್ತೋತ್ರವಾಗಲಿ. ನನ್ನ ಮನಸ್ಸಿನ ಮೂಲಕ ನಡೆಯುವುದೆಲ್ಲವೂ ನಿನ್ನ ಸ್ಮರಣೆಯಾಗಲಿ. ಎಲ್ಲವೂ ನಿನ್ನ ಪೂಜೆಯಾಗಲಿ ಅನ್ನುವ ಚಿಂತನೆ ಬೆಳೆಸಿಕೊ-ಯುದ್ಧ ಮಾಡುವಾಗಲೂ ಸಹ" ಎನ್ನುತ್ತಾನೆ ಕೃಷ್ಣ.

ಇಲ್ಲಿ ಯುದ್ಧ ಸಮಷ್ಟಿಯಾಗಿ ತೀರ್ಮಾನವಾಗಿರುವುದು. ಸುಮಾರು ಹದಿಮೂರು ವರ್ಷಗಳ ಹಿಂದೆ ಧರ್ಮರಾಯ ರಾಜಸೂಯ ಯಾಗ ಮಾಡಿದಾಗ ಅಲ್ಲಿ ಶಿಶುಪಾಲನ ತಲೆ ಉರುಳುತ್ತದೆ. ಆಗ ಧರ್ಮರಾಯನಿಗೆ ವ್ಯಾಸರು "ಇದು ಮುಂದೆ ಸುಮಾರು ಹದಿಮೂರು ವರ್ಷಗಳ ನಂತರ ನಡೆಯುವ ಮಹಾ ಯುದ್ಧದ ಮುನ್ಸೂಚನೆ" ಎಂದು ಹೇಳುತ್ತಾರೆ. ಅಂದರೆ ಈ ಯುದ್ಧ ವಿಧಿಲಿಖಿತ. ಇಲ್ಲಿ ಅರ್ಜುನ ಕೇವಲ ಉಪಕರಣ(**Instrument**) ಅಷ್ಟೇ. ಆದ್ದರಿಂದ "ಭಗವಂತನಲ್ಲಿ ಮನವನ್ನಿಟ್ಟು ಹಂಬಲ-ಮಮಕಾರ ತೊರೆದು ನಿಶ್ಚಿಂತೆಯಿಂದ ಹೋರಾಡು" ಎಂದು ಕೃಷ್ಣ ಅರ್ಜುನನಿಗೆ ಹೇಳುತ್ತಾನೆ.

ನಮ್ಮ ಬದುಕೇ ಒಂದು ಹೋರಾಟ. ಈ ಹೋರಾಟದಲ್ಲಿ ನಾವು ಮಾಡುವ ಕಾರ್ಯವನ್ನು ನಾವು ಪ್ರಾಮಾಣಿಕವಾಗಿ ಮಾಡಬೇಕು. ಏನು ಆಗಬೇಕೋ ಅದು ಆಗಿಯೇ ತೀರುತ್ತದೆ. ಅದನ್ನು ತಡೆಯಲು ನಮ್ಮಿಂದ ಸಾಧ್ಯವಿಲ್ಲ. ಭಗವಂತ ನನಗೆ ವಹಿಸಿದ ಕೆಲಸವನ್ನು ಆತನೇ ನನ್ನ ಕೈಯಿಂದ ಮಾಡಿಸಿದ, ಇದು ಅವನಿಗರ್ಪಿತವಾಗಲಿ, ಅವನ ಪೂಜೆಯಾಗಲಿ. ಏನು ಫಲ ಬಂತೋ ಅದು ಭಗವಂತನ ಪ್ರಸಾದ. ಈ ಸಂಕಲ್ಪವನ್ನಿಟ್ಟು ಕಾರ್ಯ ನಿರ್ವಹಿಸಿದಾಗ ಏನೇ ಆದರೂ ಅದರ ಹೊಣೆಯನ್ನು ಭಗವಂತ ಹೊರುತ್ತಾನೆ. ಇದಕ್ಕಿಂತ ದೊಡ್ಡ ಪೂಜೆ ಯಾವುದೂ ಇಲ್ಲ. ಇದು ಗೀತೆ ಮೂಲಕ ಕೃಷ್ಣ ನಮಗೆ ಕೊಟ್ಟ ಜೀವನ ಸಂದೇಶ. ಇದರ ಫಲಶ್ರುತಿ ಎಂಬಂತೆ ಮುಂದಿನ ಎರಡು ಶ್ಲೋಕಗಳಿವೆ.

ಯೇ ಮೇ ಮತಮಿದಂ ನಿತ್ಯಮನುತಿಷ್ಠಂತಿ ಮಾನವಾಃ ।
ಶ್ರದ್ಧಾವಂತೋನಸೂಯಂತೋ ಮುಚ್ಯಂತೇ ತೇಪಿ ಕರ್ಮಭಿಃ ॥೩೧॥

ಯೇ ಮೇ ಮತಮ್ ಇದಮ್ ನಿತ್ಯಮ್ ಅನುತಿಷ್ಠಂತಿ ಮಾನವಾಃ ।
ಶ್ರದ್ಧಾವಂತಃ ಅನಸೂಯಂತಃ ಮುಚ್ಯಂತೇ ತೇ ಅಪಿ ಕರ್ಮಭಿಃ -ಯಾವ ಮನುಷ್ಯರು ಕಿಚ್ಚು ಪಡದೇ ನನ್ನ ಈ ಸಿದ್ಧಾಂತವನ್ನು ನಂಬಿ ನಡೆಯುವರೋ ಅವರು ಕರ್ಮಗಳಿಂದ ಪಾರಾಗುತ್ತಾರೆ.

"ಎಲ್ಲವನ್ನೂ ಭಗವಂತ ನನ್ನ ಕೈಯಿಂದ ಮಾಡಿಸುತ್ತಿದ್ದಾನೆ, ನಾನು ಮಾಡುವುದೆಲ್ಲವೂ ಅವನ ಪೂಜೆ, ನನಗೆ ಯಾವ ಫಲದಿಂದ ಒಳಿತು ಎನ್ನುವುದು ನನಗಿಂತ ಭಗವಂತನಿಗೆ ಚೆನ್ನಾಗಿ ತಿಳಿದಿದೆ. ಆದ್ದರಿಂದ ಫಲದಲ್ಲಿ ಅಧಿಕಾರ ಬಯಸದೇ ಬಂದಿದ್ದನ್ನು ಭಗವಂತನ ಪ್ರಸಾದ ಎಂದು ಸ್ವೀಕರಿಸಿ ಬದುಕುವುದು". ಇದು ನಮ್ಮ ಜೀವನದ ನಿತ್ಯಾನುಷ್ಠಾನದ ಪರಿಯಾಗಬೇಕು. ಜೀವನದ ಪ್ರತೀ ಕ್ಷಣದಲ್ಲೂ ಈ ಅನುಸಂಧಾನವಿರುವ ಮಾನವರು(Human being, ಜ್ಞಾನಿಗಳು, ಮನುಷ್ಯತ್ವ ಉಳ್ಳವರು) ಅಶ್ರದ್ಧೆ(ರಾಜಸ) ಹಾಗೂ ಅಸೂಯೆ(ತಾಮಸ) ತೊರೆದು ನಿಷ್ಕಾಮಕರ್ಮ ಮಾಡಿದಾಗ, ಅವರ ಜ್ಞಾನ ವೃದ್ಧಿಯಾಗುತ್ತದೆ. ಅದರಿಂದ ಅವರು ಕರ್ಮ ಬಂಧನವನ್ನು ಕಳಚಿಕೊಂಡು ಮೋಕ್ಷಕ್ಕೆ ಹೋಗಲು ಅರ್ಹರಾಗುತ್ತಾರೆ. ನಿತ್ಯಾನುಷ್ಠಾನದಲ್ಲಿ ಈ ಅನುಸಂಧಾನವಿದ್ದಾಗ ನಮ್ಮ ಕರ್ಮವೇ ನಮ್ಮನ್ನು ಕರ್ಮ ಬಂಧನದಿಂದ ಕಳಚುವುದಕ್ಕೆ ಮೆಟ್ಟಿಲಾಗುತ್ತದೆ ಹಾಗೂ ಕರ್ಮ ಬಂಧನದಿಂದ ಪಾರು ಮಾಡುತ್ತದೆ.

ಯೇ ತ್ವೇತದಭ್ಯಸೂಯಂತೋ ನಾನುತಿಷ್ಠಂತಿ ಮೇ ಮತಮ್।
ಸರ್ವಜ್ಞಾನವಿಮೂಢಾಂಸ್ತಾನ್ ವಿದ್ಧಿನಷ್ಟಾನಚೇತಸಃ ॥೩೨॥

ಯೇ ತು ಏತತ್ ಅಭ್ಯಸೂಯಂತಃ ನ ಅನುತಿಷ್ಠಂತಿ ಮೇ ಮತಮ್ ।
ಸರ್ವ ಜ್ಞಾನ ವಿಮೂಢಾನ್ ತಾನ್ ವಿದ್ಧಿ ನಷ್ಟಾನ್ ಅಚೇತಸಃ -ಯಾರು ಕಿಚ್ಚಿನಿಂದ ನನ್ನ ಸಿದ್ದಾಂತವನ್ನು ಆಚರಣೆಗೆ ತರುವುದಿಲ್ಲವೋ ಅವರು ಎಲ್ಲಾ ತಿಳಿವಿಗೂ ಎರವಾದವರು. ವಿನಾಶದತ್ತ ಸರಿವ ತಿಳಿಗೇಡಿಗಳು- ಎಂದು ತಿಳಿ.

ಮೇಲೆ ಹೇಳಿದ ಅನುಷ್ಠಾನವನ್ನು ಅರಿಯದೇ, ಅಸೂಯೆ-ಅಸಹನೆಯಿಂದ, 'ನನ್ನ ಕೆಲಸಕ್ಕೆ ನಾನೊಬ್ಬನೇ ಜವಾಬ್ದಾರ, ನಾನು ಮಾಡುವುದು ನನ್ನ ಸ್ವಂತ ಹಿತಾಸಕ್ತಿಗಾಗಿ, ಅದರ ಫಲವನ್ನು ನಾನು ಪಡೆಯುತ್ತೇನೆ, ನನ್ನ ಕೈಯಲ್ಲಿ ನನ್ನ ಅಸ್ತಿತ್ವವಿದೆ, ಯಾವ ದೇವರೂ ಅದಕ್ಕೆ ಹೊಣೆಗಾರನಲ್ಲ' ಎಂದು ಅಭಿಪ್ರಾಯ ತೋರಿ ಅಹಂಕಾರದಿಂದ ಬದುಕುವವರಿಗೆ ಎಂದೂ ಅರಿವಿನ ಬಾಗಿಲು ತೆರೆಯುವುದಿಲ್ಲ. ಆತ ಪ್ರಪಂಚದಲ್ಲಿ ವಿಮೂಢ(ಶ್ರೇಷ್ಠ ದಡ್ಡ)ಎನಿಸುತ್ತಾನೆ. ಆತನಿಗೆ 'ತನಗೆ ಏನೂ ಗೊತ್ತಿಲ್ಲ ಎನ್ನುವ ವಿಷಯವೂ ಗೊತ್ತಿರುವುದಿಲ್ಲ!' ಇಂತವರಿಗೆ ಸತ್ಯದ ಬಗ್ಗೆ ಚಿಂತನೆ ಮಾಡುವ ಅರ್ಹತೆ ಇರುವುದಿಲ್ಲ. ಅಂತವರು ವಿನಾಶದತ್ತ ನಡೆಯುವ ತಿಳಿಗೇಡಿಗಳು. ಅವರು ಕತ್ತಲಿನಿಂದ ಕತ್ತಲಿಗೆ ಹೋಗುತ್ತಾ ಅಧಃಪಾತವನ್ನು ತಲುಪಿ ತನ್ನ ಅಸ್ಥಿತ್ವವನ್ನು ಕಳೆದುಕೊಳ್ಳುತ್ತಾರೆ.

ಕೃಷ್ಣನ ಈ ಮೇಲಿನ ಸಂದೇಶವನ್ನು ಕೇಳಿದಾಗ ನಮಗೊಂದು ಪ್ರಶ್ನೆ ಬರುತ್ತದೆ. ಜಗತ್ತಿನ ಮೂಲಭೂತವಾದ ಈ ಸತ್ಯವನ್ನು ಏಕೆ ಎಲ್ಲರೂ ಅನುಸರಿಸುವುದಿಲ್ಲ? ಎಂದು. ಇದಕ್ಕೆ ತುಂಬಾ ರೋಚಕವಾದ ಉತ್ತರವನ್ನು ಕೃಷ್ಣ ಮುಂದಿನ ಎರಡು ಶ್ಲೋಕಗಳಲ್ಲಿ ಕೊಡುತ್ತಾನೆ.

ಸದೃಶಂ ಚೇಷ್ಟತೇ ಸ್ವಸ್ಯಾಃ ಪ್ರಕೃತೇರ್ಜ್ಞಾನವಾನಪಿ ।
ಪ್ರಕೃತಿಂ ಯಾಂತಿ ಭೂತಾನಿ ನಿಗ್ರಹಃ ಕಿಂ ಕರಿಷ್ಯತಿ ॥೩೩॥

ಸದೃಶಮ್ ಚೇಷ್ಟತೇ ಸ್ವಸ್ಯಾಃ ಪ್ರಕೃತೇಃ ಜ್ಞಾನವಾನ್ ಅಪಿ ।
ಪ್ರಕೃತಿಮ್ ಯಾಂತಿ ಭೂತಾನಿ ನಿಗ್ರಹಃ ಕಿಮ್ ಕರಿಷ್ಯತಿ -- ಎಷ್ಟು ತಿಳಿದವನಾದರೂ ತನ್ನ ಸಂಸ್ಕಾರಕ್ಕೆ (ಸ್ವಭಾವಕ್ಕೆ) ತಕ್ಕಂತೆಯೇ ನಡೆದುಕೊಳ್ಳುತ್ತಾನೆ. ಎಲ್ಲಾ ಜೀವಿಗಳೂ ಸಂಸ್ಕಾರದ(ಸ್ವಭಾವದ) ಕೈಗೊಂಬೆಗಳು. ಅದುಮಿಟ್ಟರೇನು ಬಂತು?

ಯಾರು ಎಷ್ಟೇ ಉಪದೇಶ ಮಾಡಿದರೂ ಇಡೀ ಜಗತ್ತಿನಲ್ಲಿ ಎಲ್ಲರೂ ಒಂದೇ ಮಾರ್ಗ ಅನುಸರಿಸುವುದು ಎಂದೂ ಸಾಧ್ಯವಿಲ್ಲ. ಇದಕ್ಕೆ ಕಾರಣ ನಮ್ಮ ನಡೆ, ನಮ್ಮ ಸಂಸ್ಕಾರ, ಹಾಗೂ ನಮ್ಮ ಜೀವ ಸ್ವಭಾವ. ನಾವು ನಮ್ಮ ಪೂರ್ವ ಸಂಸ್ಕಾರವನ್ನು ನೋಡಿದರೆ-ಸಾತ್ವಿಕ, ರಾಜಸ, ತಾಮಸವಾದ ಅನೇಕ ಅನುಭವಗಳು ಜನ್ಮ-ಜನ್ಮಾಂತರಗಳಿಂದ ಸುಪ್ತಪ್ರಜ್ಞೆಯಲ್ಲಿರುತ್ತವೆ. ಅನೇಕ ಜನ್ಮಗಳ ಮೂಲಕ ಹರಿದು ಬಂದ ಈ ಜೀವಕ್ಕೆ ಅನೇಕ ಜನ್ಮಗಳ ಅನುಭವದ ಸಂಸ್ಕಾರವಿದೆ. ಒಂದೇ ಜನ್ಮವನ್ನು ನೋಡಿದರೂ ಕೂಡಾ, ಬೆಳೆದು ಬಂದ ವಾತಾವರಣದ ಛಾಪು, ಈ ಪ್ರಭಾವ, ಸದಾ ನಮ್ಮ ಮೇಲಿರುತ್ತದೆ. ಇದಲ್ಲದೆ ಪ್ರತೀ ವ್ಯಕ್ತಿಗೆ ಆತನದೇ ಆದ ಜೀವಸ್ವಭಾವವಿರುತ್ತದೆ. ಆತ ಸದಾ ಅದಕ್ಕೆ ತಕ್ಕಂತೆ ನಡೆದುಕೊಳ್ಳುತ್ತಾನೆ. ಮೆಣಸಿನ ಗಿಡ ಹೇಗೆ ಸಿಹಿಯಾದ ಹಣ್ಣನ್ನು ನೀಡಲಾರದೋ ಹಾಗೇ ಒಬ್ಬ ವ್ಯಕ್ತಿಯ ಜೀವಸ್ವಭಾವವನ್ನು ಬದಲಿಸುವುದು ಅಸಾಧ್ಯ. ಸ್ವಭಾವ ಮತ್ತು ಪ್ರಭಾವದ ಸಮ್ಮಿಶ್ರಣ ಈ ಬದುಕು.

ಈ ಮೇಲಿನ ವಿಶ್ಲೇಷಣೆಯನ್ನು ನೋಡಿದಾಗ ಸಹಜವಾಗಿ ನಮಗೊಂದು ಪ್ರಶ್ನೆ ಮೂಡುತ್ತದೆ. "ಜೀವ ಸ್ವಭಾವದಂತೆ ಜೀವದ ನಡೆ; ಸ್ವಭಾವದಂತೆ ಕ್ರಿಯೆ; ಸ್ವಭಾವಕ್ಕೆ ತಕ್ಕಂತೆ ಎಲ್ಲವೂ ಆಗುತ್ತದೆ. ಹಾಗಾದರೆ ಪ್ರಯತ್ನ ಏಕೆ ಮಾಡಬೇಕು?" ಎಂದು. ಏಕೆಂದರೆ ಸದಾ ಪ್ರಯತ್ನ ಮಾಡುವುದರಿಂದ ಸಂಸ್ಕಾರದಿಂದ ಅಥವಾ ಪ್ರಭಾವದಿಂದ ಈಚೆ ಬರಲು ಸಾಧ್ಯ. ಸಹಜ ಸ್ವಭಾವದಲ್ಲಿ ನಿಲ್ಲುವ ತನಕ ಪ್ರಭಾವದಿಂದ ಪಾರಾಗುವ ನಿರಂತರ ಪ್ರಯತ್ನ ಅಗತ್ಯ. ನಿರಂತರ ಅಧ್ಯಾತ್ಮ ಸಾಧನೆ ನಮ್ಮ ಸಹಜ ಸ್ವಭಾವವನ್ನು ಅಭಿವ್ಯಕ್ತಗೊಳಿಸಲು ಸಹಾಯ ಮಾಡುತ್ತದೆ.

ಇಂದ್ರಿಯಸ್ಯೇಂದ್ರಿಯಸ್ಯಾರ್ಥೇ ರಾಗದ್ವೇಷೌ ವ್ಯವಸ್ಥಿತೌ।
ತಯೋರ್ನ ವಶಮಾಗಚ್ಛೇತ್ ತೌ ಹ್ಯಸ್ಯ ಪರಿಪಂಥಿನೌ ॥೩೪॥

ಇಂದ್ರಿಯಸ್ಯ ಇಂದ್ರಿಯಸ್ಯಅರ್ಥೇ ರಾಗ ದ್ವೇಷೌ ವ್ಯವಸ್ಥಿತೌ ।
ತಯೋಃ ನ ವಶಮ್ ಅಗಚ್ಛೇತ್ ತೌ ಹಿ ಅಸ್ಯ ಪರಿಪಂಥಿನೌ--ಒಂದೊಂದು ಇಂದ್ರಿಯದ ವಿಷಯದಲ್ಲೂ ಒಲವು - ಹಗೆತನಗಳು ತುಂಬಿವೆ. ಅವುಗಳಿಗೆ ಬಲಿಯಾಗಬಾರದು. ಅವೇ ಸಾಧಕನ ಹಗೆಗಳು.

ನಮ್ಮ ಇಂದ್ರಿಯಗಳಲ್ಲಿ ಎರಡು ವಿಷಯಗಳು ನಮ್ಮ ಶತ್ರುಗಳಾಗಿ ಕೆಲಸ ಮಾಡುತ್ತವೆ. ಅವುಗಳೆಂದರೆ ರಾಗ(ಇಷ್ಟ ಪಡುವುದು, **Attachment**); ಹಾಗೂ ಬೇಕು ಎನ್ನುವ ಬಯಕೆ(ಕಾಮ, **Desire**). ಇಷ್ಟಪಡುವುದು-ರಾಗ, ಅದರಿಂದ ಕಾಮ. ಇಷ್ಟ ಆಗದೇ- ದ್ವೇಷ, ಅದರಿಂದ ಕೋಪ. ಒಂದು ವಸ್ತುವನ್ನು ಬಯಸಿದೆವು, ಅದು ಸಿಗಲಿಲ್ಲ ಆಗ ಸಿಟ್ಟು. ಅದು ಇನ್ನೊಬ್ಬರಿಗೆ ಸಿಕ್ಕಿತು ಆಗ ದ್ವೇಷ, ಸಿಕ್ಕಿತು ಆದರೆ ಅದು ನಾವು ಅಂದುಕೊಂಡಂತೆ ಇಲ್ಲ ಆಗ ಕೋಪ. ಮೂಲಭೂತವಾಗಿ ಇರತಕ್ಕ ದೊಡ್ಡ ದೋಷ ಬಯಕೆ. ಯಾವುದನ್ನು ಹೆಚ್ಚು ಹೆಚ್ಚು ಬಯಸುತ್ತೇವೋ ಅದರಿಂದ ಹೆಚ್ಚು ಹೆಚ್ಚು ದುಃಖಕ್ಕೀಡಾಗುತ್ತೇವೆ. ಬಯಕೆಯನ್ನು ಸೀಮಿತಗೊಳಿಸದೇ ಮೇಲೆ ಬರಲು ಸಾಧ್ಯವಿಲ್ಲ. ನಮ್ಮ ಪ್ರತಿಯೊಂದು ಇಂದ್ರಿಯದಲ್ಲಿ ರಾಗ-ದ್ವೇಷ; ಕಾಮ-ಕ್ರೋಧ ತುಂಬಿರುತ್ತದೆ. ಆದರೆ ನಾವು ಎಂದೂ ಈ ಬೇಕು ಬೇಡಗಳಿಗೆ, ರಾಗ ದ್ವೇಷಗಳಿಗೆ ವಶವಾಗಬಾರದು. ನನ್ನದು ಎನ್ನುವ ಅತಿ ಅನುರಾಗ **(Possessiveness)** ನಮ್ಮನ್ನು ಅಧಃಪತನಕ್ಕೆ ಕೊಂಡೊಯ್ಯುತ್ತದೆ. ನನಗೆ ಬೇಕು, ಅದು ಇನ್ನೊಬ್ಬರಿಗೆ ಸಿಗಬಾರದು ಎನ್ನುವುದು ಪ್ರತೀ ಇಂದ್ರಿಯದಲ್ಲಿ ತುಂಬಿದೆ. ಇದು ನಮ್ಮ ಪ್ರವೃತ್ತಿಯ ಹಿಂದಿರುವ ಅಹಂಕಾರ(**Ego**). ಕೃಷ್ಣ ಹೇಳುತ್ತಾನೆ: "ಎಂದೂ ಈ ಬೇಕು ಬೇಡಗಳ ದಾಸನಾಗಬೇಡ, ಅವು ನಿನ್ನ ಸಾಧನೆಯ ದಾರಿಗೆ ಅಡ್ಡಗೋಡೆ. ಅವು ನಿನ್ನ ನಿಜ ಶತ್ರುಗಳು" ಎಂದು.

ನಾವು ಈ ಶತ್ರುಗಳಿಗೆ ಬಲಿಯಾಗದೇ, ನಮ್ಮ ಇಂದ್ರಿಯಗಳನ್ನು ನಾವೇ ವಿಶ್ಲೇಷಿಸಬೇಕು. ನನ್ನ ಇಂದ್ರಿಯ ಏನನ್ನು ಬಯಸುತ್ತಿದೆ, ಏಕೆ ಬಯಸುತ್ತಿದೆ, ಅದರ ಹಿಂದಿರುವ ಸ್ವಾರ್ಥ-ದ್ವೇಷವೇನು, ಇದು ನನ್ನನ್ನು ದಾರಿತಪ್ಪಿಸುವ ಬಯಕೆಯೋ ಅಥವಾ ಮೇಲಕ್ಕೆ ತರುವ ಬಯಕೆಯೋ? ಹೀಗೆ ವಿಚಾರ ಮಾಡಿ ನಮ್ಮ ಬಯಕೆಗಳ ಶುದ್ಧೀಕರಣ ಮಾಡಿಕೊಳ್ಳಬೇಕು. ವೇದದಲ್ಲಿ ಹೇಳುವಂತೆ 'ಹಿಟ್ಟನ್ನು ಸಾರಣಿಗೆಯಿಂದ ಬೇರ್ಪಡಿಸುವಂತೆ ನಾವು ನಮ್ಮ ಮನಸ್ಸೆಂಬ ಸಾರಣಿಗೆಯಿಂದ ನಮ್ಮ ಬಯಕೆಗಳ ಶುದ್ಧೀಕರಣ ಮಾಡಿಕೊಳ್ಳಬೇಕು. ಆಗ ಅಲ್ಲಿ ಸ್ನೇಹದ ಬೆಸುಗೆ ಇರುತ್ತದೆ. ಅಲ್ಲಿ ಲಕ್ಷ್ಮಿ ಸದಾ ನೆಲೆಸುತ್ತಾಳೆ'.
ಇಲ್ಲಿ ಕೃಷ್ಣ ಅರ್ಜುನನಿಗೆ ಯುದ್ಧ ಮಾಡುವಾಗ ಕೂಡಾ ರಾಗ-ದ್ವೇಷವನ್ನು ಮನಸ್ಸಿನಲ್ಲಿ ಇಟ್ಟುಕೊಳ್ಳಬೇಡ, ಕೇವಲ ನ್ಯಾಯಾನ್ಯಾಯದ ಹೋರಾಟ ಎನ್ನುವ ನಿರ್ಲಿಪ್ತತೆಯಿಂದ ಹೋರಾಡು ಎನ್ನುತ್ತಿದ್ದಾನೆ! ಅಂದರೆ ದುರ್ಯೋಧನ ಸತ್ತಾಗ ಸಂತೋಷ ಬೇಡ; ಸ್ವಂತ ಮಗ ಅಭಿಮನ್ಯು ಸತ್ತಾಗ ದುಃಖ ಬೇಡ ಎನ್ನುವ ಯುದ್ಧಪೂರ್ವ ಕಿವಿಮಾತಿದು!

ಶ್ರೇಯಾನ್ ಸ್ವಧರ್ಮೋ ವಿಗುಣಃ ಪರಧರ್ಮಾತ್ ಸ್ವನುಷ್ಠಿತಾತ್ ।
ಸ್ವಧರ್ಮೇ ನಿಧನಂ ಶ್ರೇಯಃ ಪರಧರ್ಮೋ ಭಯಾವಹಃ ॥೩೫॥

ಶ್ರೇಯಾನ್ ಸ್ವ ಧರ್ಮಃ ವಿಗುಣಃ ಪರಧರ್ಮಾತ್ ಸು ಅನುಷ್ಠಿತಾತ್ ।
ಸ್ವಧರ್ಮೇ ನಿಧನಮ್ ಶ್ರೇಯಃ ಪರಧರ್ಮಃ ಭಯ ಆವಹಃ -- ತನ್ನ ಸ್ವಭಾವಕ್ಕೆ ಪರಕೀಯವಾದ ಧರ್ಮವನ್ನು ಚೆನ್ನಾಗಿ ಆಚರಿಸುವುದಕ್ಕಿಂತಲೂ, ಅರೆಬರೆಯಾಗಿಯಾದರೂ ಸಹಜ ಧರ್ಮವನ್ನು ಆಚರಿಸುವುದು ಮಿಗಿಲು.
ಸ್ವಭಾವ ಸಹಜ ಧರ್ಮದಲ್ಲಿ ಸಾವಾದರೂ ಮೇಲು. ಪರಕೀಯ ಧರ್ಮ ಅದಕ್ಕಿಂತ ಭಯಂಕರ.

ಹಿಂದೆ ಹೇಳಿದಂತೆ ಪ್ರತಿಯೊಂದು ಜೀವಕ್ಕೂ ಅದರದ್ದೇ ಆದ ಸ್ವಭಾವವಿರುತ್ತದೆ ಹಾಗೂ ಅದನ್ನು ಬದಲಿಸಲು ಬರುವುದಿಲ್ಲ. ಜೀವ ಸ್ವಭಾವಕ್ಕನುಗುಣವಾಗಿ ನಮ್ಮ ಧರ್ಮ, ಅದು ಸ್ವಧರ್ಮ. ಇದು ಸಹಜ ಕ್ರಿಯೆ. ನಮ್ಮ ಸಹಜ ಸ್ವಭಾವ ಯಾವುದೋ ಅದನ್ನು ನಾವು ಮಾಡಬೇಕೇ ವಿನಃ ಅನ್ಯವನ್ನಲ್ಲ. ಈ ಕಾರಣಕ್ಕಾಗಿ ತಂದೆ-ತಾಯಿ ತಮ್ಮ ಅಭಿರುಚಿಯನ್ನು ಮಕ್ಕಳ ಮೇಲೆ ಹೇರದೇ, ಮಕ್ಕಳ ನಿಜ ಸ್ವಭಾವವನ್ನು ಗುರುತಿಸಿ ಅದಕ್ಕನುಗುಣವಾಗಿ ಅವರ ಭವಿಷ್ಯವನ್ನು ರೂಪಿಸಬೇಕು. ಇಲ್ಲದಿದ್ದರೆ ಅವರ ಭವಿಷ್ಯವನ್ನು ಹಾಳು ಮಾಡಿದಂತಾಗುತ್ತದೆ. ಮಕ್ಕಳ ಪ್ರತಿಭೆ ಅವರ ಸಹಜವಾದ ಸ್ವಭಾವದಲ್ಲಿದೆ. ಪ್ರತಿಯೊಬ್ಬನೂ ತನ್ನ ಜೀವ ಸ್ವಭಾವಕ್ಕನುಗುಣವಾಗಿ ಕಾರ್ಯ ನಿರ್ವಹಿಸಬೇಕೇ ಹೊರತು ಇನ್ನ್ಯಾರದ್ದೋ ಧರ್ಮವನ್ನು ಅನುಸರಿಸಿ ಅಲ್ಲ. ಇಲ್ಲಿ ಕೃಷ್ಣ ಹೇಳುತ್ತಾನೆ "ನಿನ್ನ ಸ್ವಧರ್ಮ ಆಚರಣೆಯಲ್ಲಿ ನ್ಯೂನತೆ ಇದ್ದರೂ, ಅದು ಪರಕೀಯ ಧರ್ಮವನ್ನು ಆಚರಿಸುವುದಕ್ಕಿಂತ ಶ್ರೇಷ್ಠ" ಎಂದು. ಪರ ಧರ್ಮವನ್ನು ಎಷ್ಟು ಪರಿಪೂರ್ಣವಾಗಿ ಆಚರಿಸಿದರೂ ಅದರಿಂದ ಒಳಿತಿಲ್ಲ, ಅದು ಅಸಹ್ಯ ಅಥವಾ ಭಯಂಕರ.
ಇಲ್ಲಿ ಯುದ್ಧ ಮಾಡುವುದು ಅರ್ಜುನನ ಸ್ವಭಾವ ಧರ್ಮ. ಅದನ್ನು ಬಿಟ್ಟು ಆತ ತಪಸ್ಸು ಮಾಡುವುದಕ್ಕೆ ಕಾಡಿಗೆ ಹೋಗುವುದು ಆತನ ಸ್ವಧರ್ಮಕ್ಕೆ ವಿರುದ್ಧ. ಆದುದರಿಂದ ಸ್ವಧರ್ಮ ಪಾಲನೆ ಮಾಡು, ರಾಗ ದ್ವೇಷವನ್ನು ಬಿಟ್ಟು ಹೋರಾಡು ಎನ್ನುತ್ತಿದ್ದಾನೆ ಕೃಷ್ಣ.

ಅರ್ಜುನ ಉವಾಚ ।
ಅಥ ಕೇನ ಪ್ರಯುಕ್ತೋಽಯಂ ಪಾಪಂ ಚರತಿ ಪೂರುಷಃ ।
ಅನಿಚ್ಛನ್ನಪಿ ವಾರ್ಷ್ಣೇಯ ಬಲಾದಿವ ನಿಯೋಜಿತಃ ॥೩೬॥

ಅರ್ಜುನಃ ಉವಾಚ-ಅರ್ಜುನ ಕೇಳಿದನು
ಅಥ ಕೇನ ಪ್ರಯುಕ್ತಃ ಅಯಮ್ ಪಾಪಮ್ ಚರತಿ ಪೂರುಷಃ ।
ಅನಿಚ್ಛನ್ ಅಪಿ ವಾರ್ಷ್ಣೇಯ ಬಲಾತ್ ಇವ ನಿಯೋಜಿತಃ-ಓ ವಾರ್ಷ್ಣೇಯಾ, ಮನುಷ್ಯ ಪಾಪ ಮಾಡುತ್ತಾನೆ. ತನಗೆ ಇಷ್ಟವಿರದಿದ್ದರೂ ಯಾರೋ ಬಲವಂತದಿಂದ ಮಾಡಿಸಿದಂತೆ! ಇದು ಯಾರ ಪ್ರೇರಣೆ?

ಕೃಷ್ಣನ ಉಪದೇಶವನ್ನು ಕೇಳಿದ ಮೇಲೆ ಅರ್ಜುನ ನಮ್ಮ-ನಿಮ್ಮೆಲ್ಲರಿಗೆ ಬರುವಂಥಹ ಒಂದು ಬಹಳ ಮುಖ್ಯವಾದ ಪ್ರಶ್ನೆಯನ್ನು ಹಾಕುತ್ತಾನೆ. "ಪಾಪ ಪುಣ್ಯದ ಅರಿವಿದ್ದೂ, ಮಾಡಬಾರದ ಕೆಲಸ ಎಂದು ತಿಳಿದಿದ್ದೂ, ಮನುಷ್ಯ ಕೆಲವೊಮ್ಮೆ ತಪ್ಪು ಮಾಡುತ್ತಾನೆ-ಇದು ಏಕೆ? ನಮಗೆ ಸರಿ-ತಪ್ಪಿನ ಅರಿವಿದ್ದೂ ಏಕೆ ತಪ್ಪನ್ನು ಮಾಡುತ್ತೇವೆ?

ಮಾಡಬಾರದು ಅನಿಸಿದ್ದನ್ನು ಮಾಡುವಂತೆ ಪ್ರೇರೇಪಿಸುವ ಶಕ್ತಿ ಯಾವುದು? ನಾವು ಬೇಡವೆಂದರೂ ನಮ್ಮ ಕೈಯಲ್ಲಿ ಮಾಡಿಸುವ ಶಕ್ತಿ ಯಾವುದು?" ಇದು ಅರ್ಜುನನ ಪ್ರಶ್ನೆ. ಇಲ್ಲಿ 'ಪೂರುಷ' ಎನ್ನುವ ಪದ ಬಳಕೆಯಾಗಿದೆ. ಒಬ್ಬ ಅಪರೋಕ್ಷ ಜ್ಞಾನಿ ಕೂಡಾ ಈ ಮೇಲಿನ ತಪ್ಪನ್ನು ಮಾಡುತ್ತಾನೆ ಎನ್ನುವ ಅರ್ಥದಲ್ಲಿ ಈ ಪದ ಇಲ್ಲಿ ಬಳಕೆಯಾಗಿದೆ. ಮಹಾಭಾರತದಲ್ಲಿ ನೋಡಿದಾಗ ನಮಗೆ ಇದಕ್ಕೆ ಅನೇಕ ಉದಾಹರಣೆಗಳು ಸಿಗುತ್ತವೆ. ಭೀಷ್ಮ-ದ್ರೋಣಾಚಾರ್ಯರು ಆ ಕಾಲದ ಮಹಾ ಜ್ಞಾನಿಗಳು. ಆದರೆ ಯಾವುದೋ ಕಾರಣದಿಂದ, ತಪ್ಪು ಎಂದು ತಿಳಿದಿದ್ದರೂ ಸಹ ದುರ್ಯೋಧನನ ಕಡೆ ಯುದ್ಧಕ್ಕೆ ನಿಂತರು. ಈ ರೀತಿ ಏಕೆ? ಯಾವ ದುಷ್ಟ ಶಕ್ತಿ (ಸೈತಾನ) ನಮ್ಮೊಳಗಿದ್ದು ಈ ಕೆಲಸವನ್ನು ಮಾಡಿಸುತ್ತದೆ? ಎನ್ನುವ ಮೂಲಭೂತವಾದ ಪ್ರಶ್ನೆಯನ್ನು ಅರ್ಜುನ ಕೃಷ್ಣನ ಮುಂದಿರಿಸುತ್ತಾನೆ.

ಇಲ್ಲಿ ಅರ್ಜುನ ಕೃಷ್ಣನನ್ನು 'ವಾರ್ಷ್ಣೇಯ' ಎಂದು ಸಂಬೋಧಿಸಿದ್ದಾನೆ. 'ವೃಷ್ಣಿ' ಅನ್ನುವುದು ವೈದಿಕ ಪದ. 'ವೃಷ್ಣಿ' ಅಂದರೆ ಬಯಸಿದ ಬಯಕೆಗಳನ್ನು ಈಡೇರಿಸುವವ. ಬಯಸಿದ ಬಯಕೆಗಳನ್ನು ಈಡೇರಿಸುವವರಿಗೆ, ಹಾಗೂ ಎಲ್ಲರಿಗೂ ಆಶ್ರಯದಾತ 'ವಾರ್ಷ್ಣೇಯ'. "ಬಯಸಿದ ಬಯಕೆಗಳನ್ನು ಈಡೇರಿಸುವವರನ್ನು ಒದಗಿಸಿಕೊಡುವವ ಮತ್ತು ಎಲ್ಲಾ ಬಯಕೆಗಳನ್ನು ಈಡೇರಿಸುವ ಮಹಾಶಕ್ತಿಯಾಗಿ ನಿಂತಿರುವ ನೀನು, ಇಷ್ಟವಿರದಿದ್ದರೂ ನಮ್ಮಿಂದ ಬಲವಂತವಾಗಿ ಕೆಲಸ ಮಾಡಿಸುವ ಶಕ್ತಿ ಯಾವುದು ಎನ್ನುವುದನ್ನು ತಿಳಿಸು" ಎನ್ನುವ ಭಾವ ಈ ಸಂಬೋಧನೆಯಲ್ಲಿದೆ.

ಭಗವಾನುವಾಚ

ಕಾಮ ಏಷ ಕ್ರೋಧ ಏಷ ರಜೋಗುಣಸಮುದ್ಭವಃ।
ಮಹಾಶನೋ ಮಹಾಪಾಪ್ಮಾ ವಿದ್ಧ್ಯೇನಮಿಹ ವೈರಿಣಮ್ ॥೩೭॥

ಭಗವಾನುವಾಚ-ಭಗವಂತ ಹೇಳಿದನು:

ಕಾಮಃ ಏಷಃ ಕ್ರೋಧಃ ಏಷಃ ರಜಃ ಗುಣ ಸಮುದ್ಭವಃ ।

ಮಹಾ ಅಶನಃ ಮಹಾಪಾಪ್ಮಾ ವಿದ್ಧಿ ಏನಮ್ ಇಹ ವೈರಿಣಮ್--ಪಾಪವನ್ನು ಪ್ರೇರೇಪಿಸುವ ಶಕ್ತಿ ಕಾಮ (ಕಾಮದ ಅಭಿಮಾನಿಯಾದ ಕಾಲನೇಮಿ) ಇದರದೇ ರೂಪಾಂತರ ಸಿಟ್ಟು. ರಜೋಗುಣದಿಂದ ಇದರ ಹುಟ್ಟು. ಇದು ತಿಂದಷ್ಟೂ ತಣಿಯದ ಹೊಟ್ಟೆಬಾಕ. ಮಹಾಪಾತಕಗಳ ತವರು. ಇದನ್ನು ಈ ಸಾಧನಾ ಪಥದಲ್ಲಿ ಹಗೆಯೆಂದು ತಿಳಿ.

ಎಲ್ಲವುದಕ್ಕೂ ಮೂಲಕಾರಣ ನಮ್ಮೊಳಗಿರುವ ಬಯಕೆ. ಯಾವುದೋ ಒಂದು ಬಯಕೆ ನಮ್ಮನ್ನು ಕಾಡುತ್ತಿರುತ್ತದೆ, ಆ ಬಯಕೆಯನ್ನು ತಪ್ಪು ಮಾಡುವ ಮುಖೇನ ಈಡೇರಿಸಿಕೊಳ್ಳಬಹುದು ಎನ್ನುವ ಪ್ರೇರಣೆ (temptation) ನಮ್ಮಲ್ಲಿರುತ್ತದೆ. ಇದನ್ನು ಮಾಡಿಸುವವನು ಕಾಮದ ಅಭಿಮಾನಿಯಾದ ದುಷ್ಟ ಶಕ್ತಿ 'ಕಾಲನೇಮಿ'; ನಮ್ಮೊಳಗೆ ಕಾಲನೇಮಿ ಬಂದು ಕೂತರೆ ನಮಗರಿವಿಲ್ಲದಂತೆ ನಾವು ತಪ್ಪು ಮಾಡುತ್ತೇವೆ. ಮೂಲಭೂತವಾಗಿ ನೋಡಿದರೆ ಮನುಷ್ಯ ತಪ್ಪು ಮಾಡುವುದಕ್ಕೆ ಎರಡು ಸಂಗತಿಗಳು ಕಾರಣ. ಒಂದು ಅಪೇಕ್ಷೆಗಳು ಹಾಗೂ ಅಪೇಕ್ಷೆ ಈಡೇರದೇ ಇದ್ದಾಗ ಕೋಪ. ಸಿಟ್ಟಿನ ಬರದಲ್ಲಿ ಮನುಷ್ಯ ಎಷ್ಟು ತಪ್ಪು ಮಾಡುತ್ತಾನೆ ಎಂದು ಹೇಳುವುದೂ ಕಷ್ಟ.

ತಪ್ಪು ಮಾಡಿ ಕೊನೆಗೆ ಪಶ್ಚಾತ್ತಾಪ ಪಡುತ್ತೇವೆ. ಈ ಕ್ರೋಧ ಎನ್ನುವುದಕ್ಕೆ ಮೂಲ ಕಾಮ. ಕಾಮವಿಲ್ಲದೆ ಕ್ರೋಧವಿಲ್ಲ. ಎಲ್ಲಾ ಕ್ರೋಧದ ಹಿಂದೆ ಅರ್ಥಹೀನ ಕಾಮವಿರುತ್ತದೆ.

ಮನುಷ್ಯನಲ್ಲಿರುವ ರಜೋಗುಣ ರಾಗ-ದ್ವೇಷವನ್ನು ಬೆಳೆಸುತ್ತದೆ. ಅದಕ್ಕೆ ಎಷ್ಟು ಆಹಾರ ಹಾಕಿದರೂ ಹೊಟ್ಟೆ ತುಂಬುವುದಿಲ್ಲ! ಇದಕ್ಕೆ ಉತ್ತಮ ಉದಾಹರಣೆ ಎಂದರೆ: ಒಬ್ಬ ಕೆಲಸಕ್ಕಾಗಿ ಅಲೆದಾಡುತ್ತಿರುತ್ತಾನೆ, ಆಗ ಆತನಿಗೆ ಹೊಟ್ಟೆಪಾಡಿಗೆ ಒಂದು ಕೆಲಸ ಸಿಕ್ಕಿದರೆ ಸಾಕು ಎನ್ನುವ ಅಭಿಪ್ರಾಯವಿರುತ್ತದೆ. ಒಮ್ಮೆ ಕೆಲಸ ಸಿಕ್ಕಿತೆಂದರೆ, ಆತನ ಬಯಕೆ ಹೆಚ್ಚು ಸಂಬಳ ಪಡೆಯುವತ್ತ ಹರಿಯುತ್ತದೆ. ಹೆಚ್ಚು ಸಿಕ್ಕಿದಾಗ ಮತ್ತಷ್ಟರಾಸೆ, ಹೀಗೆ ಇದು ಬೆಳೆದುಕೊಂಡು ಹೋಗುತ್ತದೆ. ಎಂದೂ ತೃಪ್ತಿ ಇರುವುದೇ ಇಲ್ಲ.

ಹೀಗೆ ನಾವು ತಪ್ಪು ಮಾಡುವುದನ್ನು ಒಗ್ಗಿಸಿಕೊಂಡರೆ ಅದು 'ಮಹಾಶನ' ವಾಗುತ್ತದೆ. ಅದಕ್ಕೆ ಎಷ್ಟು ಔತಣ ಹಾಕಿದರೂ ಮತ್ತೆ ಬೇಕು ಅನ್ನುತ್ತದೆ. ಎಲ್ಲಿಯವರೆಗೆ ಅಂದರೆ ಅದು ನಮ್ಮಿಂದ ಮಾಡಬಾರದ ಕೆಲಸವನ್ನು ಮಾಡಿಸುತ್ತದೆ. ತನ್ನ ಆಸೆಯನ್ನು ಈಡೇರಿಸಿಕೊಳ್ಳುವ ಛಲಕ್ಕೆ ಬಿದ್ದವ ಬ್ರಹ್ಮಹತ್ಯೆಗೂ ಹೇಸುವುದಿಲ್ಲ ಎನ್ನುತ್ತದೆ ಶಾಸ್ತ್ರ! ಆದ್ದರಿಂದ ನಮ್ಮ ಮೊದಲ ಶತ್ರು ರಾಗ-ದ್ವೇಷ. ಅದರ ಬಗ್ಗೆ ಎಚ್ಚರವಹಿಸಬೇಕು. ಅದು ನಿನ್ನೊಳಗಿದ್ದು ನಿನ್ನನ್ನು ಆಳದಿರಲಿ. ಇದನ್ನೇ ಕುರಾನಿನಲ್ಲಿ ಹೀಗೆ ಹೇಳಿದ್ದಾರೆ **"Drive them out from where you have been driven out"**. ರಾಗ ದ್ವೇಷಗಳು ನಮ್ಮ ವ್ಯಕ್ತಿತ್ವವನ್ನು ಸೂರೆ ಮಾಡಿ ತಾವು ಆಳುತ್ತಿದ್ದಾವಲ್ಲ, ಅವನ್ನು ಹೊರಗೋಡಿಸು, ನೀನು ನೀನಾಗಿ ಬದುಕು.

ಧೂಮೇನಾವ್ರಿಯತೇ ವಹ್ನಿರ್ಯಥಾದರ್ಶೋ ಮಲೇನ ಚ ।
ಯಥೋಲ್ಬೇನಾವೃತೋ ಗರ್ಭಸ್ತಥಾ ತೇನೇದಮಾವೃತಮ್ ॥೩೮॥

ಧೂಮೇನ ಅವ್ರಿಯತೇ ವಹ್ನಿಃ ಯಥಾ ಆದರ್ಶಃ ಮಲೇನ ಚ ।
ಯಥಾ ಉಲ್ಬೇನ ಆವೃತಃ ಗರ್ಭಃ ತಥಾ ತೇನ ಇದಮ್ ಆವೃತಮ್ -ಹೊಗೆಯಿಂದ ಬೆಂಕಿ ಕವಿದಂತೆ (ಭಗವಂತ), ಕೊಳೆಯಿಂದ ಕನ್ನಡಿ ಕವಿದಂತೆ(ಮನಸ್ಸು), ಗರ್ಭ ಕೋಶದಿಂದ ಭ್ರೂಣ ಕವಿದಂತೆ(ಜೀವ), ಕಾಮದಿಂದ ಈ ಎಲ್ಲಾ ಕವಿದುಕೊಂಡಿದೆ.[ಹೊಗೆ ಬೆಂಕಿಯನ್ನು ಕವಿದಂತೆ ಕಾಮ ಸಜ್ಜನರನ್ನು ಕವಿಯುತ್ತದೆ. ಕೊಳೆ ಕನ್ನಡಿಯನ್ನು ಕೆಡಿಸಿದಂತೆ ಮಧ್ಯಮರನ್ನು. ಗರ್ಭಕೋಶ ಭ್ರೂಣವನ್ನು ಮುಚ್ಚಿದಂತೆ ದುರ್ಜನರನ್ನು]

ರಾಗ ದ್ವೇಷಗಳು ಹೇಗೆ ನಮ್ಮ ಕಣ್ಣನ್ನು ಕಟ್ಟುತ್ತವೆ ಎನ್ನುವುದಕ್ಕೆ ಒಂದು ಸುಂದರ ವಿವರಣೆಯನ್ನು ಕೃಷ್ಣ ಇಲ್ಲಿ ಕೊಟ್ಟಿದ್ದಾನೆ. ಎಲ್ಲವನ್ನೂ ಬೆಳಗುತ್ತಿರುವ ಬೆಂಕಿ, ಅದು ತಾನೂ ಬೆಳಗುತ್ತದೆ ಹಾಗೂ ಎಲ್ಲವನ್ನೂ ಬೆಳಗಿಸುತ್ತದೆ. ಈ ಬೆಂಕಿಗೆ ಹೊಗೆ ತುಂಬಿದಾಗ ಅದು ಕಾಣುವುದಿಲ್ಲ ಹಾಗೂ ಬೆಳಗುವುದಿಲ್ಲ. ಭಗವಂತ ಬೆಂಕಿಯಂತೆ. ನಮ್ಮ ರಜೋ ಗುಣ ಹೊಗೆಯಂತೆ. ನಮಗೂ ಭಗವಂತನಿಗೂ ನಡುವೆ ರಜೋಗುಣದ ಪರದೆ ಬೆಂಕಿಯನ್ನು ಸುತ್ತಿದ ಹೊಗೆಯಂತೆ. ಇದು ಸಾತ್ವಿಕ ಮನುಷ್ಯನಿಗೆ ಕೃಷ್ಣ ಕೊಟ್ಟ ದೃಷ್ಟಾಂತ. ಇನ್ನು ರಾಜಸರಿಗೆ ಕೃಷ್ಣ ಕೊಡುವ ದೃಷ್ಟಾಂತ ಮಸಿ ಬಳಿದ ಕನ್ನಡಿ. ಮನಸ್ಸು ಎನ್ನುವ ಕನ್ನಡಿಗೆ ರಜೋಗುಣ ಎನ್ನುವ ಕೊಳೆ ಬಳಿದಂತೆ ಎನ್ನುತ್ತಾನೆ

ಕೃಷ್ಣ. ತಾಮಸರಿಗೆ ಕೃಷ್ಣನ ದೃಷ್ಟಾಂತ ಗರ್ಭಚೀಲದಲ್ಲಿರುವ ಭ್ರೂಣ. ಎಲ್ಲವೂ ಕತ್ತಲು. ಕಣ್ಣು ತೆರೆದರೂ ಕಾಣದು, ಜೀವಜಾತವೆನ್ನುವ ಮರಿಯನ್ನು ರಜೋಗುಣ ಎನ್ನುವ ಮೊಟ್ಟೆಯಲ್ಲಿಟ್ಟಂತೆ.
ಹೀಗೆ ಬೆಂಕಿಗೆ ಹೊಗೆಯಂತೆ-ಭಗವಂತನಿಗೆ ಆವರಣ ಈ ರಜೋ ಗುಣ; ಕನ್ನಡಿಗೆ ಹಚ್ಚಿದ ಮಸಿಯಂತೆ-ಅಂತಃಕಾರಣಕ್ಕೆ ಆವರಣ ಈ ರಜೋಗುಣ. ಅಂತಃಕರಣ ಕೆಲಸ ಮಾಡದೇ ಇದ್ದಾಗ ಭಗವಂತ ಕಾಣುವುದಿಲ್ಲ ಆಗ- ಜೀವಕ್ಕೆ 'ಭ್ರೂಣದಂತೆ' ಎಲ್ಲವೂ ಕತ್ತಲು. ಎಲ್ಲವೂ ಇದ್ದೂ ಏನೂ ಉಪಯೋಗವಿಲ್ಲದೆ ವ್ಯರ್ಥವಾಗುತ್ತದೆ.

ಆವೃತಂ ಜ್ಞಾನಮೇತೇನ ಜ್ಞಾನಿನೋ ನಿತ್ಯವೈರಿಣಾ ।
ಕಾಮರೂಪೇಣ ಕೌಂತೇಯ ದುಷ್ಪೂರೇಣಾನಲೇನ ಚ ॥೩೯॥

ಆವೃತಮ್ ಜ್ಞಾನಮ್ ಏತೇನ ಜ್ಞಾನಿನಃ ನಿತ್ಯವೈರಿಣಾ ।
ಕಾಮ ರೂಪೇಣ ಕೌಂತೇಯ ದುಷ್ಪೂರೇಣ ಅನಲೇನ ಚ -- ಓ ಕೌಂತೇಯಾ, ಬೆಂಕಿಯಂತೆ ಕಬಳಿಸಿದಷ್ಟೂ ತೃಪ್ತಿಯಿಲ್ಲದೆ, ಕೊನೆಯಿಲ್ಲದ ಈ ಕಾಮವೆಂಬುದು ಸಾಧಕನ ಚಿರಶತ್ರು. ಇದು ಬಲ್ಲವರ ತಿಳಿವನ್ನೂ ಕವಿದು ಮಂಕಾಗಿಸುತ್ತದೆ.
ಈ ರಜೋಗುಣದ ಪರದೆ- ಜ್ಞಾನ ಬಂದವನಿಗೆ ಇದ್ದ ಜ್ಞಾನ ಉಪಯೋಗವಾಗದಂತೆ, ಜ್ಞಾನವಿಲ್ಲದವನಿಗೆ ಜ್ಞಾನ ಬರದಂತೆ-ತಡೆಗೋಡೆಯಾಗಿ ನಿಲ್ಲುತ್ತದೆ. ರಾಗ-ದ್ವೇಷ ನಮ್ಮ ಕಡು ವೈರಿ. ಅದು ಎಷ್ಟು ಭಯಂಕರ ಎಂದರೆ ಅದನ್ನು 'ಬಯಕೆಯ ಬೆಂಕಿ' ಎನ್ನಬಹುದು. ಅದಕ್ಕೆ ಎಷ್ಟು ಬಡಿಸಿದರೂ ಅದು ಸಾಕು ಎನ್ನದು. ಕುಂತಿಯಂತಹ ಮಹಾ ತಾಯಿಯ ಮಗನಾದ ನೀನು ಈ ಕಾಮ(ಬಯಕೆ, Attachment) ಎನ್ನುವ ಜ್ಞಾನ ವಿರೋಧಿ ಶತ್ರುವನ್ನು ತಿಳಿ ಎನ್ನುತ್ತಾನೆ ಕೃಷ್ಣ.
ಇಲ್ಲಿ ನಮಗೆ ನಮ್ಮ ನಿಜ ವೈರಿ ನಮ್ಮ ಕಾಮ ಅಥವಾ ಬಯಕೆ, ಅಥವಾ ರಾಗ-ದ್ವೇಷ ಎಂದು ತಿಳಿಯಿತು. ಹಾಗಿದ್ದರೆ ಈ ವೈರಿಯ ನೆಲೆ ಯಾವುದು? ಇದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸಿದ್ದಾನೆ.

ಇಂದ್ರಿಯಾಣಿ ಮನೋ ಬುದ್ಧಿರಸ್ಯಾಧಿಷ್ಠಾನಮುಚ್ಯತೇ ।
ಏತೈರ್ವಿಮೋಹಯತ್ಯೇಷ ಜ್ಞಾನಮಾವೃತ್ಯ ದೇಹಿನಮ್ ॥೪೦॥

ಇಂದ್ರಿಯಾಣಿ ಮನಃ ಬುದ್ಧಿಃ ಅಸ್ಯ ಅಧಿಷ್ಠಾನಮ್ ಉಚ್ಯತೇ ।
ಏತೈಃ ವಿಮೋಹಯತಿ ಏಷಃ ಜ್ಞಾನಮ್ ಆವೃತ್ಯ ದೇಹಿನಮ್ -- ಇಂದ್ರಿಯಗಳು, ಮನಸ್ಸು, ಬುದ್ಧಿ ಈ ಕಾಮದ ನೆಲೆದಾಣಗಳು. ಇವುಗಳ ಮೂಲಕ ಇದು ತಿಳಿವನ್ನು ಕವಿದು ಸಾಧಕನನ್ನು ಕಂಗೆಡಿಸುತ್ತದೆ.

ನಮ್ಮ ಬಯಕೆಗಳ ಸರಮಾಲೆ ಮೊದಲು ಬಂದು ಕೂರುವುದು ನಮ್ಮ ಇಂದ್ರಿಯದಲ್ಲಿ. ಕಣ್ಣಿಗೆ ನೋಡುವ, ಕಿವಿಗೆ ಕೇಳುವ, ಮೂಗಿಗೆ ಮೂಸುವ, ಮೈಗೆ ಮುಟ್ಟುವ-ಹೀಗೆ ಒಂದೊಂದು ಬಯಕೆ ಒಂದೊಂದು ರೂಪದಲ್ಲಿ ಒಂದೊಂದು ಇಂದ್ರಿಯದಲ್ಲಿ ಬಂದು ಕೂರುತ್ತದೆ. ಅಲ್ಲಿ ನಾವು ಅದನ್ನು ನಿಗ್ರಹಿಸದೇ ಇದ್ದರೆ ಅದು ನಮ್ಮ

ಮನಸ್ಸನ್ನು ಆಕ್ರಮಿಸುತ್ತದೆ. ಅಲ್ಲೂ ನಾವು ಸಡಿಲಗೊಳಿಸಿದರೆ ಅದು ಮುಂದೆ ನಮ್ಮ ಬುದ್ಧಿಯನ್ನು ಆಕ್ರಮಿಸಿಬಿಡುತ್ತದೆ. ಹೀಗೆ ಅಂಗಳದ(ಇಂದ್ರಿಯ) ಈ ಶತ್ರುವನ್ನು ಮೊಗಸಾಲೆ(ಮನಸ್ಸು)ಗೆ ಕರೆದು, ನಂತರ ನಮ್ಮ ನಡು ಮನೆಯಲ್ಲಿ(ಬುದ್ಧಿ) ಕುಳ್ಳಿರಿಸಿದಂತೆ. ಒಮ್ಮೆ ಈ ಶತ್ರು ನಮ್ಮ ಬುದ್ಧಿಯನ್ನು ಆಕ್ರಮಿಸಿದರೆ ಮುಂದೆ ಅದನ್ನು ತೊಡೆದು ಹಾಕುವುದು ತುಂಬಾ ಕಷ್ಟ. ಈ ಸ್ಥಿತಿಯಲ್ಲಿ ಬಯಕೆ ಎನ್ನುವುದು ಸಿದ್ಧಾಂತವಾಗಿ ನಮ್ಮೊಳಗಿದ್ದು ನಮ್ಮನ್ನೇ ಆಳುವುದಕ್ಕೆ ಆರಂಭಿಸುತ್ತದೆ. ಇದರಿಂದ ಕಾಮನೆ ಎನ್ನುವುದು ನಮ್ಮ ಜೀವನ ಧರ್ಮವಾಗುತ್ತದೆ. ಉದಾಹರಣೆಗೆ ಒಂದು ಸಂಗತಿ ನಮ್ಮ ಕಿವಿ ಮೇಲೆ ಬೀಳುತ್ತದೆ. ನಾವು ಆ ವಿಷಯದಿಂದ ನಮಗೇನು ಉಪಯೋಗ ಆ ಬಗ್ಗೆ ಗಮನ ಏಕೆ ಹರಿಸಬೇಕು ಎಂದು ಯೋಚಿಸುವುದಿಲ್ಲ. ಅದನ್ನು ಬಿಟ್ಟು ಕೇಳಿದ ವಿಷಯವನ್ನು ನೋಡಲು ಹಂಬಲಿಸುತ್ತೇವೆ. ನೋಡಿದ ಮೇಲೆ ಮುಟ್ಟಬೇಕು(ತಿನ್ನಬೇಕು ಮೂಸಬೇಕು ಇತ್ಯಾದಿ) ಎನ್ನುವ ಆಸೆ! ಹೀಗೆ ನಾವು ನಮ್ಮೆಲ್ಲಾ ಇಂದ್ರಿಯದಲ್ಲಿ ಈ ಕಾಮನೆ ಎನ್ನುವ ವೈರಿಗೆ ಪ್ರೋತ್ಸಾಹ ಕೊಡುತ್ತೇವೆ. ಆಗ ಅದು ನಿಧಾನವಾಗಿ ನಮ್ಮ ಮನಸ್ಸನ್ನು ಆಕ್ರಮಿಸುತ್ತದೆ. ಮನಸ್ಸು ನಿರಂತರವಾಗಿ ಆ ವಿಷಯದ ಬಗ್ಗೆ ಯೋಚಿಸಲಾರಂಭಿಸುತ್ತದೆ. ಮನಸ್ಸು 'ಅದು ನನ್ನದಾಗಬೇಕು, ನನ್ನದೇ ಆಗಬೇಕು **(Possessiveness)**' ಎಂದು ಯೋಚಿಸುತ್ತಿದೆ ಎಂದರೆ ಈ ವೈರಿ ಮನಸ್ಸನ್ನು ಆಕ್ರಮಿಸಿದೆ ಎಂದರ್ಥ. ಇಲ್ಲಿಂದ ಮುಂದೆ ಬುದ್ಧಿ; 'ಅದನ್ನು ಬಿಟ್ಟು ನಾನಿರಲಾರೆ, ಏನೇ ಆಗಲಿ ನಾನು ಅದನ್ನು ಪಡೆಯಲೇ ಬೇಕು' ಇತ್ಯಾದಿ ಯೋಚನೆಗಳು, ಇದು ಕಾಮನೆ ನಮ್ಮ ಬುದ್ಧಿಯನ್ನು ಆಕ್ರಮಿಸುವ ಸೂಚನೆ. ಇದು ಸರ್ವನಾಶದ ಮುನ್ಸೂಚನೆ. ಹೀಗೆ ಜ್ಞಾನಕ್ಕೆ ವಿಭ್ರಮೆಯಾಗಿರುವ ಈ ಮೂರು ಜಾಗದಲ್ಲಿ ಕೂತು ಜ್ಞಾನಕ್ಕೆ ಪರದೆಯಾಗಿ ನಿಲ್ಲುತ್ತದೆ ಈ ನಮ್ಮ ವೈರಿ.

ಇಲ್ಲಿ 'ದೇಹಿನಮ್' ಎನ್ನುವ ಪದ ಬಳಕೆಯಾಗಿದೆ- ನಮ್ಮ ದೇಹ ಎನ್ನುವುದು ಜ್ಞಾನದ ಮೂಲಕ ನಮ್ಮನ್ನು ಎತ್ತರಕ್ಕೆ ಕೊಂಡೊಯ್ಯುವ ಸಾಧನ. ಆದರೆ ಕಾಮನೆ ಎನ್ನುವ ವೈರಿಯ ಸಂಗ ಮಾಡಿದಾಗ ಅದು ನಮ್ಮನ್ನು ಅಧಃಪಾತಕ್ಕೆ ತಳ್ಳುವ ಸಾಧನವಾಗುತ್ತದೆ. ಇದು ಈ ಪದದ ಹಿಂದಿರುವ ಭಾವಾರ್ಥ.

ಹೀಗೆ ನಮ್ಮ ವೈರಿ ಯಾರು, ಆತ ಇರುವ ಸ್ಥಾನ ಯಾವುದು ಹಾಗೂ ಆತ ಹೇಗೆ ನಮ್ಮನ್ನು ಆಕ್ರಮಿಸುತ್ತಾನೆ ಎನ್ನುವ ವಿವರಣೆಯನ್ನು ಕೊಟ್ಟ ಕೃಷ್ಣ, ಈ ವೈರಿಯನ್ನು ಗೆದೆಯುವ ಪರಿಯನ್ನು ಮುಂದೆ ವಿವರಿಸುತ್ತಾನೆ.

ತಸ್ಮಾತ್ ತ್ವಮಿಂದ್ರಿಯಾಣ್ಯಾದೌ ನಿಯಮ್ಯ ಭರತರ್ಷಭ ।
ಪಾಪ್ಮಾನಂ ಪ್ರಜಹಿ ಹ್ಯೇನಂ ಜ್ಞಾನವಿಜ್ಞಾನನಾಶನಮ್ ॥೪೧॥

ತಸ್ಮಾತ್ ತ್ವಮ್ ಇಂದ್ರಿಯಾಣಿ ಆದೌ ನಿಯಮ್ಯ ಭರತ ಋಷಭ |
ಪಾಪ್ಮಾನಮ್ ಪ್ರಜಹಿ ಹಿ ಏನಮ್ ಜ್ಞಾನ ವಿಜ್ಞಾನ ನಾಶನಮ್- ಆದ್ದರಿಂದ , ಓ ಭರತವಂಶದ ವೀರಾ, ಮೊದಲು ನೀನು ಇಂದ್ರಿಯಗಳನ್ನು ಹದ್ದಿನಲ್ಲಿರಿಸಿಕೊಂಡು, ಅರಿವನ್ನೂ ಆಳವಾದ ಚಿಂತನ ಶಕ್ತಿಯನ್ನೂ ಹಾಳು ಗೆಡವಬಲ್ಲ ಈ ಪಾಪಿಯನ್ನು ಒದ್ದೋಡಿಸು.

ಇಂತಹ ಮಹಾ ವೈರಿಯನ್ನು ನಾವು ಮೊದಲ ಹಂತದಲ್ಲೇ ನಿಯಂತ್ರಿಸಬೇಕು. ಈ ಶತ್ರುವಿನ ಮೊದಲ ಪ್ರವೇಶ ದ್ವಾರವಾದ ಇಂದ್ರಿಯದಲ್ಲೇ ಅದರ ನಿಯಂತ್ರಣ ಮಾಡಬೇಕು. ನಮ್ಮ ಜ್ಞಾನ(ಶ್ರವಣ)ವನ್ನು, ವಿಜ್ಞಾನ(ಮನನ-

ನಿಧಿಧ್ಯಾಸನ)ವನ್ನು ಹಾಳುಗೆಡವಿ, ನಮ್ಮ ಚಿಂತನಾ ಶಕ್ತಿಯನ್ನು ನಾಶಮಾಡಬಲ್ಲ ಈ ಮಹಾ ಪಾಪಿಯನ್ನು ಒದ್ದೋಡಿಸು ಎನ್ನುತ್ತಾನೆ ಕೃಷ್ಣ. ಆದರೆ ಹೇಗೆ? ಇದಕ್ಕೆ ಯಾರು ಸಹಾಯ ಮಾಡುತ್ತಾರೆ ? ಮುಂದೆ ಕೇಳಿ!

ಇಂದ್ರಿಯಾಣಿ ಪರಾಣ್ಯಾಹುರಿಂದ್ರಿಯೇಭ್ಯಃ ಪರಂ ಮನಃ ।
ಮನಸಸ್ತು ಪರಾ ಬುದ್ಧಿರ್ಯೋ ಬುದ್ಧೇಃ ಪರತಸ್ತು ಸಃ ॥೪೨॥

ಇಂದ್ರಿಯಾಣಿ ಪರಾಣಿ ಆಹುಃ ಇಂದ್ರಿಯೇಭ್ಯಃ ಪರಮ್ ಮನಃ ।
ಮನಸಃ ತು ಪರಾ ಬುದ್ಧಿಃ ಯಃ ಬುದ್ಧೇಃ ಪರತಃ ತು ಸಃ-ಇಂದ್ರಿಯಗಳು[ಶರೀರಕ್ಕಿಂತ] ಹಿರಿದಾದ ತಾಣಗಳು. [ಇಂದ್ರಿಯಾಭಿಮಾನಿಗಳಾದ ಇಂದ್ರಾದಿಗಳು ಹಿರಿಯ ದೇವತೆಗಳು].ಇಂದ್ರಿಯಗಳಿಗಿಂತ ಮನಸ್ಸು ಹಿರಿಯ ತಾಣ.[ಇಂದ್ರಿಯಾಭಿಮಾನಿ ದೇವತೆಗಳಿಗಿಂತ ಮನೋಭಿಮಾನಿ ರುದ್ರ ಹಿರಿಯ ದೇವತೆ]. ಮನಸ್ಸಿಗಿಂತ ಬುದ್ಧಿ ಹಿರಿಯ ತಾಣ[ಮನೋಭಿಮಾನಿಗಿಂತ ಬುದ್ಧಿಮಾನಿನಿ ಸರಸ್ವತಿ ಹಿರಿಯ ದೇವತೆ]. ಬುದ್ಧಿಗಿಂತಲೂ ಆಚೆಗಿರುವಂತಾದ್ದು ಆ ಪರತತ್ವ[ಬುದ್ಧಿ ಮಾನಿನಿಗಿಂತಲೂ ಬುದ್ಧಿಗೋಚರನಾಗದ ಭಗವಂತ ಹಿರಿಯತತ್ವ].

ಹೇಗೆ ದುಷ್ಟ ಶಕ್ತಿಗಳಿವೆಯೋ ಹಾಗೇ ನಮ್ಮ ಒಳಿತನ್ನು ಬಯಸುವ ದೇವತಾಶಕ್ತಿಗಳು ನಮ್ಮ ರಕ್ಷಣೆಗೆ ನಿಂತಿರುತ್ತಾರೆ. ಪ್ರತಿಯೊಂದು ಇಂದ್ರಿಯಗಳಿಗೂ ಒಬ್ಬ ದೇವತೆ ಅಭಿಮಾನಿ. ನಮ್ಮ ಇಂದ್ರಿಯದ ಅಭಿಮಾನಿದೇವತೆ ಇಂದ್ರ. ಮನಸ್ಸಿನ ಅಭಿಮಾನಿ ಶಿವ-ಪಾರ್ವತಿಯರು, ಬುದ್ಧಿಯ ಅಭಿಮಾನಿ ಸರಸ್ವತಿ. ಬುದ್ಧಿಯಿಂದಾಚೆಗಿರುವುದು ಆತ್ಮ-ಅದುವೇ ಆ ಭಗವಂತನ ಸ್ಥಾನ.
ನಾವು ನಮ್ಮ ಇಂದ್ರಿಯ ಮನಸ್ಸು ಬುದ್ಧಿಯನ್ನು ನಿಯಂತ್ರಿಸುವ ದೇವತಾ ಶಕ್ತಿಗೆ ಶರಣಾಗಬೇಕು. ಆಗ ಆ ದೇವತಾ ಶಕ್ತಿಗಳ ಸಹಾಯದಿಂದ ನಾವು ಜ್ಞಾನವನ್ನು ಪಡೆದು ಭಗವಂತನನ್ನು ಕಾಣಬಹುದು. ನಮ್ಮ ಪ್ರತಿಯೊಂದು ಇಂದ್ರಿಯಕ್ಕೂ ಒಬ್ಬ ಅಭಿಮಾನಿ ದೇವತೆ ಇದ್ದಾನೆ. ಕಣ್ಣಿಗೆ ಸೂರ್ಯ, ಕಿವಿಗೆ ಚಂದ್ರ, ಬಾಯಿಗೆ ಅಗ್ನಿ, ನಾಲಿಗೆಗೆ-ವರುಣ, ಮೂಗಿಗೆ-ಆಶ್ವೀದೇವತೆಗಳು ,ಕೈಗೆ-ಇಂದ್ರ(ಈತ ಸರ್ವೇಂದ್ರಿಯದ ಒಡೆಯ ಕೂಡಾ ಹೌದು), ಕಾಲಿಗೆ-ಇಂದ್ರ ಪುತ್ರ ಉಪೇಂದ್ರ, ಯಮ-ಮಲಮೂತ್ರ ವಿಸರ್ಜನಾಂಗದ ಮತ್ತು ದಕ್ಷ ಸಂತಾನಕ್ಕೆ ಸಂಬಂಧಪಟ್ಟ ಅಂಗದ ದೇವತೆ. ಹೀಗೆ ಪ್ರತಿಯೊಂದು ದೇವತೆಗಳೂ ನಮಗೆ ನಮ್ಮ ಶತ್ರುವಿನಿಂದ ಪಾರಾಗಲು ಸಹಾಯ ಮಾಡುತ್ತಾರೆ. ಹೀಗೆ ದೇವತೆಗಳನ್ನು ಪ್ರಾರ್ಥಿಸಿ ಅವರ ಸಹಾಯ ಪಡೆದು ದುಷ್ಟ ಶಕ್ತಿಯಿಂದ ದೂರ ಸರಿದು ಎಲ್ಲಕ್ಕೂ ಮಿಗಿಲಾದ ಆ ಪರತತ್ವವನ್ನು ಸೇರಬೇಕು.

ಏವಂ ಬುದ್ಧೇಃ ಪರಂ ಬುದ್ಧ್ವಾ ಸಂಸ್ತಭ್ಯಾತ್ಮಾನಮಾತ್ಮನಾ।
ಜಹಿ ಶತ್ರುಂ ಮಹಾಬಾಹೋ ಕಾಮರೂಪಂ ದುರಾಸದಮ್ ॥೪೩॥

ಏವಮ್ ಬುದ್ಧೇಃ ಪರಮ್ ಬುದ್ಧ್ವಾ ಸಂಸ್ತಭ್ಯ ಆತ್ಮಾನಮ್ ಆತ್ಮನಾ ।
ಜಹಿ ಶತ್ರುಮ್ ಮಹಾ ಬಾಹೋ ಕಾಮರೂಪಮ್ ದುರಾಸದಮ್-ಓ ಮಹಾವೀರ, ಹೀಗೆ ಬುದ್ಧಿಗೂ ನಿಲುಕದ ಆ

ಪರತತ್ವವನ್ನು ತಿಳಿದು, ವಿವೇಕದಿಂದ ಬಗೆಯನ್ನು ಬಿಗಿಹಿಡಿದು, ಸಾಮಾನ್ಯರಿಗೆ ಬಗ್ಗದ ಕಾಮವೆಂಬ ಹಗೆಯನ್ನು ಒದ್ದೋಡಿಸು.

ಹೀಗೆ ಇಂದ್ರಿಯ-ಮನಸ್ಸು-ಬುದ್ಧಿಗೆ ನಿಲುಕದ ಆ ಪರತತ್ವವನ್ನು ತಿಳಿದು, ಮನಸ್ಸೆಂಬ ಚಂಚಲವಾದ ಕುದುರೆಗೆ ಬುದ್ಧಿಯೆಂಬ ಲಗಾಮನ್ನು ಕಟ್ಟಿ, ಆ ಕಡಿವಾಣವನ್ನು ಭಗವಂತನ ಕೈಯಲ್ಲಿ ಕೊಟ್ಟು, ಸರ್ವ ದೇವತೆಗಳ ಸಹಾಯದಿಂದ ಕಾಲನೇಮಿ ಎನ್ನುವ ರಾಕ್ಷಸನನ್ನು ಹಂತ ಹಂತವಾಗಿ ಗೆದ್ದು, ಭಗವಂತನನ್ನು ಸೇರು ಎನ್ನುತ್ತಾನೆ ಕೃಷ್ಣ. ಇಲ್ಲಿ ಹೇಳಿದ ವಿವರಣೆಯನ್ನು ನಮಗೆ ಕೆಟ್ಟ ಬಯಕೆ ಹುಟ್ಟಿದಾಗ ನೆನಪಿಸಿಕೊಂಡರೆ ಕಾಲನೇಮಿ ಎನ್ನುವ ರಾಕ್ಷಸ ನಮ್ಮೊಳಗೆ ನುಸುಳದಂತೆ ತಡೆಯಬಹುದು. ಏಕೆಂದರೆ ಎಲ್ಲಾ ಬಯಕೆಗಳೂ ಕೆಟ್ಟದ್ದಲ್ಲ. ಭಗವಂತನನ್ನು ಸೇರಬೇಕು ಎನ್ನುವ ಬಯಕೆ ಬೇಕು. ಆದ್ದರಿಂದ ನಮ್ಮ ಬುದ್ಧಿಯನ್ನು ಭಗವಂತನ ಕೈಗೊಪ್ಪಿಸಿ, ದುಷ್ಟ ಕಾಮನೆಗಳ ವಿರುದ್ಧ ದೇವತೆಗಳ ಸಹಾಯದಿಂದ ಹೋರಾಡಿ ಮೋಕ್ಷವನ್ನು ಪಡೆಯಬಹುದು. ಇಲ್ಲಿ ಒಂದು ಎಚ್ಚರ ಅಗತ್ಯ, ಒಂದೇ ಸಲ ಈ ದುಷ್ಟ ಶಕ್ತಿಯ ವಿರುದ್ಧ ಹೋರಾಡಿ ಜಯ ಗಳಿಸುತ್ತೇನೆ ಎಂದರೆ ಅದು ಅಸಾಧ್ಯ. ಇದನ್ನು ಹಂತ ಹಂತವಾಗಿ ಗಳಿಸಬೇಕು. ಸಾಧನೆಯ ವಿವಿಧ ಮೆಟ್ಟಲಿನಲ್ಲಿ ವಿವಿಧ ದೇವತೆಗಳು ನಮಗೆ ಸಹಾಯ ಮಾಡುತ್ತಾರೆ.

ಇತಿ ತೃತೀಯೋಧ್ಯಾಯಃ

ಮೂರನೇ ಅಧ್ಯಾಯ ಮುಗಿಯಿತು



# ಅಧ್ಯಾಯ ನಾಲ್ಕು

ಹಿಂದೆ ಕೃಷ್ಣ ಜ್ಞಾನಮಾರ್ಗ ಮತ್ತು ಕರ್ಮಮಾರ್ಗದ ಬಗ್ಗೆ ಎರಡನೇ ಅಧ್ಯಾಯದಲ್ಲಿ ಪ್ರಸ್ತಾಪಿಸಿ, ಆ ನಂತರ ಮೂರನೇ ಅಧ್ಯಾಯದಲ್ಲಿ ಕರ್ಮಯೋಗದ ವಿಸ್ತಾರವನ್ನು ತಿಳಿಸಿದ. ನಾಲ್ಕನೇ ಅಧ್ಯಾಯದಲ್ಲಿ ಭಗವಂತನ ಜ್ಞಾನದ ಅರಿವಿನ ಮುಖ ಮತ್ತು ಕರ್ಮದ ಪ್ರಭೇದಗಳನ್ನು ಕೃಷ್ಣ ವಿವರಿಸುತ್ತಾನೆ. ಹಿಂದೆ ಹೇಳಿದ ಜ್ಞಾನಯೋಗ ಮತ್ತು ಕರ್ಮಯೋಗವನ್ನೇ ವಿಸ್ತರಿಸಿ ಜ್ಞಾನದ ಮಹತ್ವ ಮತ್ತು ಕರ್ಮದ ಪ್ರಭೇದಗಳ ಜೊತೆಗೆ ಈ ಎರಡು ಮಾರ್ಗದಿಂದ ನಾವು ಪಡೆಯತಕ್ಕಂತಹ ಭಗವಂತನ ಮಹಿಮೆ- ಇದನ್ನು ಈ ಅಧ್ಯಾಯದಲ್ಲಿ ವಿವರಿಸಲಾಗಿದೆ. ಈ ಅಧ್ಯಾಯ ಕೃಷ್ಣನ ಮಾತಿನೊಂದಿಗೆ ಆರಂಭವಾಗುತ್ತದೆ.

ಭಗವಾನುವಾಚ ।
ಇಮಂ ವಿವಸ್ವತೇ ಯೋಗಂ ಪ್ರೋಕ್ತವಾನಹಮವ್ಯಯಮ್ ।
ವಿವಸ್ವಾನ್ ಮನವೇ ಪ್ರಾಹ ಮನುರಿಕ್ಷ್ವಾಕವೇಽಬ್ರವೀತ್ ॥೧॥

ಭಗವಾನ್ ಉವಾಚ-ಭಗವಂತ ಹೇಳಿದನು:
ಇಮಮ್ ವಿವಸ್ವತೇ ಯೋಗಮ್ ಪ್ರೋಕ್ತವಾನ್ ಅಹಮ್ ಅವ್ಯಯಮ್ ।
ವಿವಸ್ವಾನ್ ಮನವೇ ಪ್ರಾಹ ಮನುಃ ಇಕ್ಷ್ವಾಕವೇ ಅಬ್ರವೀತ್ -ಅಳಿವಿರದ ಈ ಸಾಧನಾ ಮಾರ್ಗವನ್ನು ನಾನು ಸೂರ್ಯನಿಗೆ ಹೇಳಿದ್ದೆ. ಸೂರ್ಯ ಮನುವಿಗೆ ಹೇಳಿದ್ದ. ಮನು ಇಕ್ಷ್ವಾಕುವಿಗೆ ಹೇಳಿದ್ದ.

ಏವಂ ಪರಂಪರಾಪ್ರಾಪ್ತಮಿಮಂ ರಾಜರ್ಷಯೋವಿದುಃ ।
ಸ ಕಾಲೇನೇಹ ಮಹತಾ ಯೋಗೋ ನಷ್ಟಃ ಪರಂತಪ॥೨॥

ಏವಮ್ ಪರಂಪರಾ ಪ್ರಾಪ್ತಮ್ ಇಮಮ್ ರಾಜ ಋಷಯಃ ವಿದುಃ ।
ಸಃ ಕಾಲೇನ ಇಹ ಮಹತಾ ಯೋಗಃ ನಷ್ಟಃ ಪರಂತಪ-ಹೀಗೆ ಒಬ್ಬರಿಂದ ಒಬ್ಬರಿಗೆ ಹರಿದು ಬಂದಿರುವ ಇದನ್ನು ಜ್ಞಾನಿಗಳಾದ ಅರಸರು ಅರಿತಿದ್ದರು. ಓ ಅರಿಗಳನ್ನು ತರಿದವನೇ, ತುಂಬಾ ಕಾಲದ ಬಳಿಕ ಆ ಅರಿವಿನ ದಾರಿ ಈ ನೆಲದಲ್ಲಿ ಕಣ್ಮರೆಯಾಯಿತು.

ಸ ಏವಾಯಂ ಮಯಾ ತೇಽದ್ಯ ಯೋಗಃ ಪ್ರೋಕ್ತಃ ಪುರಾತನಃ।
ಭಕ್ತೋಽಸಿ ಮೇ ಸಖಾ ಚೇತಿ ರಹಸ್ಯಂ ಹ್ಯೇತದುತ್ತಮಮ್ ॥೩॥

ಸಃ ಏವ ಅಯಮ್ ಮಯಾ ತೇ ಅದ್ಯ ಯೋಗಃ ಪ್ರೋಕ್ತಃ ಪುರಾತನಃ ।
ಭಕ್ತಃ ಅಸಿ ಮೇ ಸಖಾ ಚ ಇತಿ ರಹಸ್ಯಮ್ ಹಿ ಏತತ್ ಉತ್ತಮಮ್-- ಅದೇ ಹಳೆಯ ಅರಿವಿನ ದಾರಿಯನ್ನು ನಾನೀಗ ನಿನಗೆ ಹೇಳಿದೆ -ನೀನು ನನ್ನ ಭಕ್ತ ಮತ್ತು ಗೆಳೆಯ ಎನ್ನುವುದಕ್ಕಾಗಿ. ಇದು ತುಂಬಾ ರಹಸ್ಯವಾದ ಹಿರಿಯ ಸಂಗತಿ.

ಈ ಮೇಲಿನ ಮೂರು ಶ್ಲೋಕದಲ್ಲಿ ಸೃಷ್ಟಿಯ ಆದಿಯಿಂದ ಈ ಜ್ಞಾನದ ಪರಂಪರೆ ಹೇಗೆ ಬೆಳೆದುಬಂತು ಎನ್ನುವ ಚಿತ್ರಣವನ್ನು ಕೃಷ್ಣ ಕೊಟ್ಟಿದ್ದಾನೆ. ವಾಸ್ತವಿಕವಾಗಿ ಜ್ಞಾನದ ಮೂಲ ವೇದಗಳು. ವೇದದ ಸಾರವನ್ನು ಸಂಗ್ರಹ ಮಾಡಿ, ಸಮಸ್ತ ವೇದಾರ್ಥ ಸಂಗ್ರಹವಾದಂತಹ ಒಂದು ಗ್ರಂಥ ರಚನೆಯಾಯಿತು. ಅದನ್ನು ಪಂಚರಾತ್ರ ಎಂದು ಕರೆದರು. ಪಂಚರಾತ್ರ ಅನ್ನುವುದು ವೈದಿಕ ವಾಙ್ಮಯದ ಜ್ಞಾನಯೋಗ ಮತ್ತು ಕರ್ಮಯೋಗಗಳ ಸಮಷ್ಠಿರೂಪವಾಗಿರುವಂತಹ ಗ್ರಂಥ. ಆ ಪಂಚರಾತ್ರದ ಸಾರಸಂಗ್ರಹವೇ ಭಗವದ್ಗೀತೆ. ಸೃಷ್ಟಿಯ ಆದಿಯಲ್ಲಿ, ಸ್ವಾಯಂಭುವ ಮನ್ವಂತರದಲ್ಲಿ ಭಗವಂತ ಪಂಚರಾತ್ರವನ್ನು ಚತುರ್ಮುಖನಿಗೆ ಉಪದೇಶಿಸಿದ. ಹೀಗೆ ಪ್ರಪಂಚ ಸೃಷ್ಟಿಯಾದ ಮೊದಲಲ್ಲೇ ಪಂಚರಾತ್ರದ ಜ್ಞಾನ ಚತುರ್ಮುಖನಿಗೆ ಹಾಗೂ ದೇವತೆಗಳಿಗೆ ಬಂತು. ಸೂರ್ಯ ವೈವಸ್ವತ ಮನ್ವಂತರದಲ್ಲಿ ಇದನ್ನು ಮನುವಿಗೆ, ಮನು ಇಕ್ಷ್ವಾಕುವಿಗೆ ಹೇಳಿದ. ಇದನ್ನೇ ಕೃಷ್ಣ ಇಲ್ಲಿ ಅರ್ಜುನನನಿಗೆ ವಿವರಿಸುತ್ತಿದ್ದಾನೆ.
ಮೊಟ್ಟ ಮೊದಲು ದೇವತೆಗಳು ಭಗವಂತನಿಂದ ಈ ಜ್ಞಾನವನ್ನು ಪಡೆದರು. ಈ ದೇವತೆಗಳಲ್ಲಿ ಸೂರ್ಯನೂ ಒಬ್ಬ. ಸೂರ್ಯ ಭೂಮಿಗೂ ದೇವತೆಗಳಿಗೂ ಸಂಪರ್ಕ ಕೊಡುವ ದೇವತೆ. ಈತನಿಂದ ವೈವಸ್ವತ ಮನ್ವಂತರದ ಅಭಿಮಾನಿಯಾದ ಮನುವಿಗೆ ಈ ಜ್ಞಾನ ಹರಿದು ಬಂತು. ಮನು ಇದನ್ನು ತನ್ನ ಮಗ ಇಕ್ಷ್ವಾಕುವಿಗೆ ಹೇಳಿದ. ಈತ ಭೂಲೋಕದಲ್ಲಿ ಚಕ್ರವರ್ತಿಯಾಗಿ ಬಾಳಿದ ಮಹಾ ರಾಜರ್ಷಿ. ಹೀಗೆ ಈ ಜ್ಞಾನ ದೇವತೆಗಳಿಂದ ಭೂಲೋಕಕ್ಕೆ ಹರಿದು ಬಂತು.
ಜ್ಞಾನ ಎನ್ನುವುದು ಅನಾಧಿನಿತ್ಯ. ಇದು ಅಳಿವಿರದ ವಿದ್ಯೆ. ಪ್ರತೀ ಸೃಷ್ಟಿಯ ಆದಿಯಲ್ಲೂ ಈ ವಿದ್ಯೆ ಭಗವಂತನಿಂದ ಹೇಳಲ್ಪಡುತ್ತದೆ. ನಂತರ ದೇವತೆಗಳು, ದೇವತೆಗಳಿಂದ ರಾಜರ್ಷಿಗಳು, ನಂತರ ಋಷಿಗಳು ಹೀಗೆ ಜ್ಞಾನ ಪರಂಪರೆ ಬೆಳೆಯುತ್ತದೆ. ಇಂದು ಈ ರೀತಿ ಹರಿದು ಬಂದ ವಿದ್ಯೆ ಕಣ್ಮರೆಯಾಗುತ್ತಿದೆ; ಜನ ಮರೆಯುತ್ತಿದ್ದಾರೆ. ಮಹಾನ್ ಜ್ಞಾನಿಯಾದ ಅರ್ಜುನ ಕೂಡಾ ಈ ಜ್ಞಾನವನ್ನು ಮರೆತಿದ್ದಾನೆ. ಹಿಂದೆ ಹೇಳಿದಂತೆ ಅರ್ಜುನ ಆ ಕಾಲದ ಮಹಾನ್ ಜ್ಞಾನಿ. ಆದರೂ ಅದು ಆತನಿಗೆ ನೆನಪಿಗೆ ಬರುತ್ತಿಲ್ಲ. ಇಲ್ಲಿ ಕೃಷ್ಣ ಅರ್ಜುನನನ್ನು "ಪರಂತಪ" ಎಂದು ಸಂಬೋಧಿಸಿದ್ದಾನೆ. ಪರಂತಪ ಎಂದರೆ ಸದಾ ಭಗವಂತನನ್ನು ಜ್ಞಾನದ ದೃಷ್ಟಿಯಿಂದ ಕಾಣಬಲ್ಲವ. "ನೀನು ಅಪರೋಕ್ಷ ಜ್ಞಾನಿ; ನಿನ್ನಲ್ಲೇ ಆ ಜ್ಞಾನ ಪರಂಪರೆ ಇದೆ; ಆದರೂ ನಿನಗೆ ಸಂಶಯ ಬಂತು; ಈ ಅನಾಧಿನಿತ್ಯವಾದ ಜ್ಞಾನ ಪರಂಪರೆ ನಿನ್ನಲ್ಲೇ ಮರೆಯಾಗುತ್ತಿದೆ. ಹೀಗಿರುವಾಗ ಉಳಿದವರ ಪಾಡೇನು" ಎನ್ನುವ ಧ್ವನಿ ಈ ಪರಂತಪ ಎನ್ನುವ ಸಂಬೋಧನೆಯಲ್ಲಿದೆ.
ಜ್ಞಾನ ನಾಶವಾಗಿಲ್ಲ, ಆದರೆ ಮೋಹದ ಪರದೆ ಅದನ್ನು ತಡೆದಿದೆ. ಆದ್ದರಿಂದ ನಿನಗೆ ನಾನು ಈಗ ಆ ಜ್ಞಾನವನ್ನು ಪುನಃ ಹೇಳುತ್ತಿದ್ದೇನೆ ಎನ್ನುತ್ತಾನೆ ಕೃಷ್ಣ. ಅರ್ಜುನ ಕೃಷ್ಣನ ಮೇಲಿಟ್ಟಿರುವ ಅಪಾರ ಗೌರವ, ಭಕ್ತಿ ಹಾಗೂ ಆತ್ಮೀಯತೆಯನ್ನು ಗುರುತಿಸಿ, ಅನಾದಿನಿತ್ಯವಾದ, ಅಪೂರ್ವವಾದ ಈ ಜ್ಞಾನವನ್ನು ಕೃಷ್ಣ ಅರ್ಜುನನಿಗೆ

ನೆನಪಿಸುತ್ತಿದ್ದಾನೆ. ಅರ್ಜುನನ ಭಕ್ತಿ ನವವಿಧ ಭಕ್ತಿಗಳಲ್ಲಿ (ಶ್ರವಣ, ಕೀರ್ತನ, ಸ್ಮರಣ, ಪಾದಸೇವನ, ಅರ್ಚನ, ವಂದನ, ದಾಸ್ಯ, ಸಖ್ಯ ಹಾಗೂ ಆತ್ಮನಿವೇದನ) ಒಂದಾದ ಸಖ್ಯ. ಆತ ಭಗವಂತನನ್ನು ಗೆಳೆಯನಾಗಿ ಪೂಜಿಸಿದ. ಈ ಕಾರಣಕ್ಕಾಗಿ ಇಲ್ಲಿ ಕೃಷ್ಣ ಹೇಳುತ್ತಾನೆ: "ನೀನು ನನ್ನ ಭಕ್ತ ಮತ್ತು ಸಖ. ಆ ಕಾರಣಕ್ಕಾಗಿ ಈ ಅಮೂಲ್ಯವಾದ ಜ್ಞಾನವನ್ನು ನಿನಗೆ ಹೇಳುತ್ತಿದ್ದೇನೆ" ಎಂದು.

ಇಲ್ಲಿ 'ರಹಸ್ಯವಾದ ಜ್ಞಾನವನ್ನು ನಿನಗೆ ಹೇಳುತ್ತಿದ್ದೇನೆ' ಎಂದು ಕೃಷ್ಣ ಹೇಳಿದ್ದಾನೆ. ಜ್ಞಾನವನ್ನು ರಹಸ್ಯವಾಗಿಡಲು ಎರಡು ಕಾರಣವಿದೆ. ಒಂದು ಅದರ ದುರುಪಯೋಗ ಹಾಗೂ ಇನ್ನೊಂದು ಅದರ ನಿರುಪಯೋಗ. ಯಾರು ಜ್ಞಾನವನ್ನು ಪಡೆದು ಅದನ್ನು ತಮ್ಮ ತಲೆಮಾರಿಗೆ ಕೊಡಲಾರರೋ ಅಂಥವರಿಗೆ ಜ್ಞಾನವನ್ನು ಕೊಡುವುದು ವ್ಯರ್ಥ. ಇದರಿಂದ ಜ್ಞಾನ ಪರಂಪರೆ ಹರಿದು ಬರಲಾರದು. ಇನ್ನು ದುರುಪಯೋಗ. ಜ್ಞಾನ ಇರುವುದು ನಮ್ಮ ಅಂತರಂಗದ ಉದ್ಧಾರಕ್ಕೆ ಹಾಗೂ ಇನ್ನೊಬ್ಬರ ಉದ್ಧಾರದ ದಾರಿ ತೋರುವುದಕ್ಕಾಗಿಯೇ, ಹೊರತು ವ್ಯವಹಾರ-ವ್ಯಾಪಾರ ಮಾಡುವುದಕ್ಕಾಗಿ ಅಲ್ಲ. ಜ್ಞಾನದಿಂದ ಸಮಾಜವನ್ನು ಮೋಸಗೊಳಿಸಬಹುದು. ತಿಳುವಳಿಕೆ ಇಲ್ಲದವರನ್ನು ತನ್ನ ತಿಳುವಳಿಕೆಯಿಂದ ಮೋಸ ಮಾಡಿ ವಂಚಿಸಬಹುದು. ಈ ಎಲ್ಲಾ ಕಾರಣದಿಂದ ಜ್ಞಾನ ರಹಸ್ಯ ವಿಷಯ. ಹಿಂದೆ ಯೋಗ ಸಿದ್ಧಿಯಿಂದ ಮಾಯವಾಗುವ ವಿದ್ಯೆ ಜ್ಞಾನಿಗಳಿಗೆ ತಿಳಿದಿತ್ತು. ಇಂತಹ ಅಮೂಲ್ಯ ವಿದ್ಯೆಯ ದುರುಪಯೋಗ ಅತೀ ಸುಲಭ. ಆ ಕಾರಣಕ್ಕಾಗಿ ಅದನ್ನು ರಹಸ್ಯವಾಗಿಟ್ಟರು. ಪ್ರಾಣಿ ಭಾಷೆಯನ್ನೂ ಅರ್ಥ ಮಾಡಿಕೊಳ್ಳುವ ವಿದ್ಯೆ ನಮ್ಮಲ್ಲಿತ್ತು. ಇದನ್ನೂ ಕೂಡಾ ರಹಸ್ಯವಾಗಿಟ್ಟರು. ಹೀಗೆ ಜ್ಞಾನದಿಂದ ದುರುಪಯೋಗವಾಗುವ ಸಾಧ್ಯತೆ ಇದ್ದಾಗ ಅದನ್ನು ರಹಸ್ಯವಾಗಿಡಬೇಕು. ಇಂತಹ ರಹಸ್ಯವಾದ ವಿಷಯವನ್ನು ನಾನು 'ನಿನ್ನನ್ನು ಆಯ್ಕೆ ಮಾಡಿ ಹೇಳುತ್ತಿದ್ದೇನೆ' ಎಂದಿದ್ದಾನೆ ಕೃಷ್ಣ.

ಅರ್ಜುನ ಉವಾಚ ।
ಅಪರಂ ಭವತೋ ಜನ್ಮ ಪರಂ ಜನ್ಮ ವಿವಸ್ವತಃ ।
ಕಥಮೇತದ್ ವಿಜಾನೀಯಾಂ ತ್ವಮಾದೌ ಪ್ರೋಕ್ತವಾನಿತಿ ॥೪॥

ಅರ್ಜುನಃ ಉವಾಚ-ಅರ್ಜುನ ಕೇಳಿದನು:
ಅಪರಮ್ ಭವತಃ ಜನ್ಮ ಪರಮ್ ಜನ್ಮ ವಿವಸ್ವತಃ |
ಕಥಮ್ ಏತತ್ ವಿಜಾನೀಯಾಮ್ ತ್ವಮ್ ಆದೌ ಪ್ರೋಕ್ತವಾನ್ ಇತಿ-ನೀನು ಹುಟ್ಟಿದ್ದು ಇತ್ತೀಚೆಗೆ. ಸೂರ್ಯ ಮೊದಲು ಹುಟ್ಟಿದವನು. ನೀನೇ ಮೊದಲು ಹೇಳಿದವನು ಎಂದರೆ ಇದನ್ನು ಹೇಗೆ ಅರ್ಥೈಸಲಿ?

ಜ್ಞಾನ ಪರಂಪರೆಯನ್ನು ವಿವರಿಸುವಾಗ ಕೃಷ್ಣ "ನಾನು ಮೊದಲು ಸೂರ್ಯನಿಗೆ(ದೇವತೆಗಳಿಗೆ) ಹೇಳಿದೆ" ಎಂದಿದ್ದಾನೆ. ಇಲ್ಲಿ ಅರ್ಜುನ ಕೃಷ್ಣನನ್ನು ಈ ಕುರಿತು ಪ್ರಶ್ನಿಸುತ್ತಾನೆ. ವಯಸ್ಸಿನಲ್ಲಿ ಕೃಷ್ಣ ಅರ್ಜುನನಿಗಿಂತ ಸುಮಾರು ಆರು ತಿಂಗಳು ದೊಡ್ಡವ. ಹಾಗಿರುವಾಗ ಕೋಟಿ-ಕೋಟಿ ವರ್ಷಗಳ ಹಿಂದೆ ಸೂರ್ಯನಿಗೆ ಹೇಳಿದೆ ಅಂದರೆ ಇದನ್ನು ಹೇಗೆ ಅರ್ಥೈಸಲಿ ಎನ್ನುವುದು ಅರ್ಜುನನ ಪ್ರಶ್ನೆ.

ಇಲ್ಲಿ ಅರ್ಜುನನಿಗೆ ಸ್ವಯಂ ಭಗವಂತನಿಂದ ಈ ಪ್ರಶ್ನೆಗೆ ಉತ್ತರ ಪಡೆಯುವ ಆಸೆ. ಅದಕ್ಕಾಗಿ ಈ ಪ್ರಶ್ನೆಯನ್ನು ಹಾಕಿದ್ದಾನೆ. ಇಷ್ಟೇ ಅಲ್ಲದೆ ಎಲ್ಲಾ ನರರ ಪ್ರತಿನಿಧಿಯಾಗಿ ನಿಂತ ಮಹಾಜ್ಞಾನಿ ಅರ್ಜುನ, ನಮ್ಮ ನಿಮ್ಮೆಲ್ಲರ ಪರ ಈ ಪ್ರಶ್ನೆಯನ್ನು ಹಾಕುತ್ತಾನೆ. ಈ ಬಗ್ಗೆ ಪ್ರಾರಂಭದಲ್ಲೇ ಪ್ರಸ್ತಾಪಿಸಲಾಗಿದೆ. ಕೃಷ್ಣ ಹೇಳಿದ್ದ: "ನಾವೆಲ್ಲರೂ ಹಿಂದೆಯೂ ಇದ್ದೆವು, ಈಗ ಇದ್ದೇವೆ ಮತ್ತು ಮುಂದೆಯೂ ಇರುತ್ತೇವೆ" ಎಂದು(ಅ-2 ,ಶ್ಲೋ-12). ಅದರ ಸಂಪೂರ್ಣ ವಿವರಣೆ ಇಲ್ಲಿ ಬರುತ್ತದೆ. ಯಾವ ಕರ್ಮ ಬಂಧನವೂ ಇಲ್ಲದ, ಸರ್ವ ಸಮರ್ಥನಾದ ಭಗವಂತ ಭೂಮಿಗೇಕೆ ಇಳಿದು ಬರುತ್ತಾನೆ ಎನ್ನುವ ಪ್ರಶ್ನೆಗೆ ಮುಂದಿನ ಶ್ಲೋಕಗಳಲ್ಲಿ ಕೃಷ್ಣ ಉತ್ತರಿಸಿದ್ದಾನೆ.

ಭಗವಾನುವಾಚ ।
ಬಹೂನಿ ಮೇ ವ್ಯತೀತಾನಿ ಜನ್ಮಾನಿ ತವ ಚಾರ್ಜುನ ।
ತಾನ್ಯಹಂ ವೇದ ಸರ್ವಾಣಿ ನ ತ್ವಂ ವೇತ್ಥ ಪರಂತಪ ॥೫॥

ಭಗವಾನ್ ಉವಾಚ-ಭಗವಂತ ಹೇಳಿದನು.
ಬಹೂನಿ ಮೇ ವ್ಯತೀತಾನಿ ಜನ್ಮಾನಿ ತವ ಚ ಅರ್ಜುನ ।
ತಾನಿ ಅಹಮ್ ವೇದ ಸರ್ವಾಣಿ ನ ತ್ವಮ್ ವೇತ್ಥ ಪರಂತಪ-ಓ ಅರ್ಜುನಾ, ನನಗೆ ಹಲವಾರು ಹುಟ್ಟುಗಳು ಆಗಿ ಹೋದವು. ನಿನಗೆ ಕೂಡಾ. ಓ ಅರಿಗಳನ್ನು ತರಿದವನೇ, ಅವೆಲ್ಲವನ್ನೂ ನಾನು ಬಲ್ಲೆ- ಆದರೆ ನಿನಗೆ ಗೊತ್ತಿಲ್ಲ.

ಜನ್ಮ ಅಂದರೆ ಜನನ ಅಥವಾ ಹುಟ್ಟುವುದು. ಇಲ್ಲದೇ ಇರುವುದು ಹುಟ್ಟುವುದಿಲ್ಲ. ಜಡವನ್ನು ಹುಟ್ಟಿತು ಎಂದು ನಾವು ಕರೆಯುವುದಿಲ್ಲ. ಸೂಕ್ಷ್ಮ ಶರೀರದಿಂದ ಸ್ಥೂಲ ಶರೀರದಲ್ಲಿ ಕಾಣಿಸಿಕೊಳ್ಳುವುದು ಜನನ. ಸಾಯುವುದು ಅಂದರೆ ಸೂಕ್ಷ್ಮಶರೀರ ಸ್ಥೂಲಶರೀರವನ್ನು ತ್ಯಜಿಸುವುದು. ಇಲ್ಲಿ ಕೃಷ್ಣ ಹೇಳುತ್ತಾನೆ: "ನನಗೆ ಹಾಗೂ ನಿನಗೆ ಅನೇಕ ಹುಟ್ಟುಗಳು ಆಗಿ ಹೋದವು. ನನಗೆ ಅದು ತಿಳಿದಿದೆ ಆದರೆ ಪರಂತಪನಾದ ನಿನಗೂ ಈ ವಿಚಾರ ತಿಳಿದಿಲ್ಲ" ಎಂದು.

ಅಜೋಽಪಿ ಸನ್ನವ್ಯಯಾತ್ಮಾ ಭೂತಾನಾಮೀಶ್ವರೋಽಪಿ ಸನ್ ।
ಪ್ರಕೃತಿಂ ಸ್ವಾಮಧಿಷ್ಠಾಯ ಸಂಭವಾಮ್ಯಾತ್ಮಮಾಯಯಾ ॥೬॥

ಅಜಃ ಅಪಿ ಸನ್ ಅವ್ಯಯ ಆತ್ಮಾ ಭೂತಾನಾಮ್ ಈಶ್ವರಃ ಅಪಿ ಸನ್ ।
ಪ್ರಕೃತಿಮ್ ಸ್ವಾಮ್ ಅಧಿಷ್ಠಾಯ ಸಂಭವಾಮಿ ಆತ್ಮಮಾಯಯಾ-ನನಗೆ ಹುಟ್ಟೆಂಬುದಿಲ್ಲ. ನನ್ನ ದೇಹಕ್ಕೆ ಕೂಡಾ ಸಾವಿಲ್ಲ. ನಾನು ಎಲ್ಲಾ ಜೀವಿಗಳ ಒಡೆಯರಿಗೂ ಒಡೆಯ. ಆದರೂ ನನ್ನಂಕೆಯಲ್ಲಿರುವ ಪ್ರಕೃತಿಮಯವಾದ ಶರೀರವನ್ನು ಹೊಕ್ಕು ಜ್ಞಾನ ಸ್ವರೂಪದಿಂದಲೇ (ನನ್ನ ಸಹಜ ಸ್ವಭಾವವನ್ನಾಧರಿಸಿ ನನ್ನಿಚ್ಛೆಯಿಂದಲೇ ) ಮೂಡಿಬರುವೆ.

ಸಮಸ್ತ ಜೀವಜಾತದ ಒಡೆಯನಾದ ಭಗವಂತ ಅನೇಕ ಬಾರಿ ಭೂಮಿಗೆ ಇಳಿದು ಬರುತ್ತಾನೆ. ಆತನಿಗೆ ಹುಟ್ಟು ಅನ್ನುವುದಿಲ್ಲ. ಆದರೂ ಹುಟ್ಟಿ ಬರುತ್ತಾನೆ. ಆತ ಅವ್ಯಯ; ಆತ ನಶ್ವರವಾದ ದೇಹವನ್ನು ಹೊತ್ತು ಹುಟ್ಟುವುದಿಲ್ಲ. ಆದ್ದರಿಂದ ದೇಹದ ಮೂಲಕ ಹುಟ್ಟು-ಸಾವು ಭಗವಂತನಿಗಿಲ್ಲ. ಇಲ್ಲಿ ಬಂದಿರುವ 'ಆತ್ಮ ಮಾಯಯಾ' ಅನ್ನುವ ಪದಕ್ಕೆ ಅನೇಕ ಅರ್ಥಗಳಿವೆ. ಜೀವಕ್ಕೆ ಕವಿದ ಮೋಹದ ಪರದೆ ಆತ್ಮ ಮಾಯೆ; ಭಗವಂತನ ಮಹಿಮೆ ಆತ್ಮ ಮಾಯೆ; ಭಗವಂತನ ಸ್ವಂತ ಇಚ್ಛೆ ಹಾಗೂ ಜ್ಞಾನ ಆತ್ಮ ಮಾಯೆ. ಭಗವಂತ ಭೂಮಿಗೆ ಇಳಿದು ಬರುವುದು ಆತನ ಜ್ಞಾನದ ಮಹಿಮೆಯಿಂದ ಹೊರತು ಯಾವುದೋ ಮಾಯೆಯ ಅಧೀನನಾಗಿ ಅಲ್ಲ. ಭಗವಂತ ತನ್ನ ಭಕ್ತರ ಕಳಕಳಿಯನ್ನು ಈಡೇರಿಸುವುದಕ್ಕೋಸ್ಕರ ಇಚ್ಛಾಪೂರ್ವಕವಾಗಿ ತಾನೇ ನಿರ್ಮಿಸಿರುವ ಪ್ರಕೃತಿಯನ್ನು ಮಾಧ್ಯಮವಾಗಿ ಬಳಸಿ ಇಳಿದು ಬರುತ್ತಾನೆ. ಇದು ಆತನ ಮಹಿಮೆ. ಮೋಹದ ಪರದೆಯಲ್ಲಿ ಬದುಕುವ ನಮಗೆ ಇದು ಒಂದು ಸಾಮಾನ್ಯ ಹುಟ್ಟು ಎನ್ನುವಂತೆ ಕಾಣುತ್ತದೆ. ಏಕೆಂದರೆ ನಮಗೆ ಆತನ ಜ್ಞಾನಾನಂದಮಯ ಶರೀರವನ್ನು ಕಾಣಲು ಸಾಧ್ಯವಿಲ್ಲ. ನಮಗೆ ಸ್ವಯಂ ನಮ್ಮ ಜೀವ ಸ್ವರೂಪದ ಅರಿವೇ ಇಲ್ಲ-ಹೀಗಿರುವಾಗ ಭಗವಂತನನ್ನು ಅರಿಯುವುದು ಸಾಧ್ಯವೇ? ಈ ಕಾರಣದಿಂದ ನಮಗೆ ಭಗವಂತ ಪಾಂಚಭೌತಿಕ ಶರೀರದವನಂತೆ ಕಾಣುತ್ತಾನೆ. ನಮಗೆ ತಿಳಿದಂತೆ ಕೆಲವು ಪ್ರಾಣಿಗಳಿಗೆ ಬಣ್ಣ ಕಾಣುವುದಿಲ್ಲ. ಅವುಗಳ ಕಣ್ಣಿಗೆ ಆ ಶಕ್ತಿ ಇಲ್ಲ. ಆದ್ದರಿಂದ ಎಲ್ಲವೂ ಕಪ್ಪು ಬಿಳುಪು. ಆದರೆ ನಿಜವಾಗಿ ಪ್ರಪಂಚದಲ್ಲಿ ಬಣ್ಣವಿದೆ, ಆ ಪ್ರಾಣಿಗಳಿಗೆ ಬಣ್ಣವನ್ನು ಗ್ರಹಿಸುವ ಶಕ್ತಿ ಇಲ್ಲ ಅಷ್ಟೇ. ಹಾಗೆಯೇ ಮೋಹದ ಪರದೆಯಲ್ಲಿ ಬದುಕುವ ನಮಗೆ ಭಗವಂತನ ಜ್ಞಾನಾನಂದ ಸ್ವರೂಪ ಶರೀರ ಕಾಣಿಸುವುದಿಲ್ಲ, ಬದಲಿಗೆ ಪಾಂಚಭೌತಿಕ ಶರೀರ ಹುಟ್ಟಿ ನಾಶವಾದಂತೆ ಕಾಣುತ್ತದೆ. ಆದರೆ ಮೂಲತಃ ಭಗವಂತನಿಗೆ ಹುಟ್ಟೂ ಇಲ್ಲ, ನಾಶವೂ ಇಲ್ಲ. ಆತ ತನ್ನ ಸಹಜ ಸ್ವಭಾವದಿಂದ ಸ್ವ-ಇಚ್ಛೆಯಿಂದ ಮೂಡಿ ಬರುತ್ತಾನೆ.

ಭಗವಂತ ಯಾವ ಕಾರಣಕ್ಕೋಸ್ಕರ ಭೂಮಿಗಿಳಿದು ಬರುತ್ತಾನೆ? ಅದರ ಹಿಂದಿರುವ ದೈವೀ ಸಂಕಲ್ಪ ಏನು? ಈ ಪ್ರಶ್ನೆಗೆ ಉತ್ತರವನ್ನು ಮುಂದಿನ ಎರಡು ಶ್ಲೋಕದಲ್ಲಿ ಕಾಣಬಹುದು.

ಯದಾಯದಾ ಹಿ ಧರ್ಮಸ್ಯ ಗ್ಲಾನಿರ್ಭವತಿ ಭಾರತ ।
ಅಭ್ಯುತ್ಥಾನಮಧರ್ಮಸ್ಯ ತದಾऽऽತ್ಮಾನಂ ಸೃಜಾಮ್ಯಹಮ್ ॥೭॥

ಯದಾಯದಾ ಹಿ ಧರ್ಮಸ್ಯ ಗ್ಲಾನಿಃ ಭವತಿ ಭಾರತ ।
ಅಭ್ಯುತ್ಥಾನಮ್ ಅಧರ್ಮಸ್ಯ ತದಾ ಆತ್ಮಾನಮ್ ಸೃಜಾಮಿ ಅಹಮ್--ಓ ಭಾರತಾ, ಧರ್ಮ ಕಳೆಗುಂದಿದಾಗೆಲ್ಲಾ, ಅಧರ್ಮ ತಲೆಯತ್ತಿದಾಗೆಲ್ಲಾ ನಾನು ನನ್ನನ್ನು ಹುಟ್ಟಿಸಿಕೊಳ್ಳುತ್ತೇನೆ.

ಇಡಿಯ ಪ್ರಪಂಚದಲ್ಲಿ ಯಾವಾಗ ಧರ್ಮ ಮಲೀನವಾಗಿ ಅಧರ್ಮದ ಮುಂದೆ ಸೋಲೊಪ್ಪಿಕೊಂಡು, ತಲೆ ಕೆಳಗಾಗಿ ನಿಲ್ಲುವ ಪ್ರಸಂಗ ಬರುತ್ತದೋ, ಆಗ ನಾನು ಧರೆಗಿಳಿದು ಬರುತ್ತೇನೆ ಎನ್ನುತ್ತಾನೆ ಕೃಷ್ಣ. ಇಲ್ಲಿ ಧರ್ಮ ಸೋಲುವುದು ಅಂದರೆ ಅದು ಒಂದು ಮನೆಗೆ- ಒಂದು ದೇಶಕ್ಕೆ ಸಂಬಂಧಪಟ್ಟ ವಿಚಾರವಲ್ಲ. ಇಡೀ ವಿಶ್ವದಲ್ಲೇ

ಧರ್ಮಕ್ಕೆ ನೆಲೆ ಸಿಗದ ಪರಿಸ್ಥಿತಿ ಬಂದಾಗ ಭಗವಂತನ ಅವತಾರವಾಗುತ್ತದೆ. ದುಷ್ಟ ಶಕ್ತಿಗಳು ಭೂಮಿಯ ಮೇಲೆ ಹಿಡಿತ ಸಾಧಿಸಿ ಸತ್ವಗುಣದ ತಲೆ ಎತ್ತದಂತೆ ಮಾಡಿದಾಗ, ಭಗವಂತ ತನ್ನನ್ನು ತಾನು ಭೂಮಿಯ ಮೇಲೆ ಸೃಷ್ಟಿಸಿಕೊಳ್ಳುತ್ತಾನೆ. "ತದಾSSತ್ಮಾನಂ ಸೃಜಾಮ್ಯಹಮ್" ಎನ್ನುವಲ್ಲಿ 'ನಾನು ನನ್ನ ಆತ್ಮೀಯರನ್ನು ಕಳುಹಿಸುತ್ತೇನೆ' ಎನ್ನುವ ಹಾಗೂ 'ನಾನೇ ಅವತರಿಸುತ್ತೇನೆ' ಎನ್ನುವ ಎರಡು ಧ್ವನಿ ಇದೆ. ಧರ್ಮಕ್ಕೆ ಸೋಲಾಗುವ ಲಕ್ಷಣಗಳು ಪ್ರಾಂತೀಯವಾಗಿ ಕಂಡು ಬಂದಾಗ ಭಗವಂತ ತನಗೆ ಆತ್ಮೀಯರಾದವರನ್ನು(ದೇವತೆಗಳನ್ನು) ಭೂಮಿಗೆ ಕಳುಹಿಸುತ್ತಾನೆ. ಅವರು ಆಚಾರ್ಯಪುರುಷರಾಗಿ ಬಂದು ಸಮಾಜವನ್ನು ತಿದ್ದುತ್ತಾರೆ. ಇಂತಹ ವ್ಯವಸ್ಥೆ ಕೂಡಾ ಕುಸಿದು ತಾಮಸ ಶಕ್ತಿಗಳು ವಿಜೃಂಭಿಸಿದಾಗ, ಕೊನೇಯದಾಗಿ ಭಗವಂತ ಸ್ವಯಂ ಅವತಾರವೆತ್ತುತ್ತಾನೆ. ಕೃಷ್ಣನ ಅವತಾರವಾದ ಸಮಯದ ಸ್ಥಿತಿಯನ್ನು ಗಮನಿಸಿದಾಗ ಆ ಕಾಲದ ಧರ್ಮದ ಪಾಡೇನು ಎನ್ನುವುದು ಸ್ಪಷ್ಟವಾಗುತ್ತದೆ. ಜರಾಸಂಧ ಪ್ರಪಂಚದ ಮೂಲೆ ಮೂಲೆಯಲ್ಲಿನ ಸುಮಾರು 22,800 ರಾಜಕುಮಾರರನ್ನು ತನ್ನ ಸೆರೆಯಲ್ಲಿಟ್ಟಿದ್ದ. ಕಂಸನಿಗೆ ತನ್ನ ಮಗಳನ್ನು ಕೊಟ್ಟು ಆತನನ್ನು ಎತ್ತಿಕಟ್ಟಿ, ಶೂರಸೇನನನ್ನು ಸೆರೆಮನೆಗೆ ಹಾಕುವಂತೆ ಕುತಂತ್ರ ಮಾಡಿ, ಅದರಲ್ಲಿ ಯಶಸ್ವಿಯಾಗಿದ್ದ ಜರಾಸಂಧ. ಇನ್ನು ಆತನ ಮಿತ್ರ ನರಕಾಸುರ ಸುಮಾರು 16,100 ರಾಜಕುಮಾರಿಯರನ್ನು ಸೆರೆಮನೆಯಲ್ಲಿಟ್ಟಿದ್ದ. ಭೀಷ್ಮಾಚಾರ್ಯರೊಂದಿಗೆ ಶಾಂತಿ ಒಪ್ಪಂದ ಮಾಡಿಕೊಂಡು ಇಡೀ ಭೂಲೋಕದಲ್ಲಿ ತನ್ನದೇ ಆದ ಏಕಚಕ್ರಾಧಿಪತ್ಯವನ್ನು ಸ್ಥಾಪಿಸುವ, ಹಾಗೂ ಜನರನ್ನು ಸುಲಿಗೆ ಮಾಡುವ ಕುತಂತ್ರ ರೂಪಿಸಿದ್ದ ಜರಾಸಂಧ. ಅಂದಿನ ಭಾರತ ಇಂದಿನ ಭಾರತದಂತಿರಲಿಲ್ಲ. ಅದು ಅತಿದೊಡ್ಡ ಭೂ ಭಾಗವಾಗಿತ್ತು. ಒಂದು ವೇಳೆ ಕೃಷ್ಣನ ಅವತಾರ ಆಗದೇ ಇದ್ದಿದ್ದರೆ ಇಡೀ ಭೂಲೋಕ ಈ ಪಾಪಿಗಳ ಕೈವಶವಾಗುತ್ತಿತ್ತು. ಇಂತಹ ಸಂದರ್ಭದಲ್ಲಿ ಕೃಷ್ಣ ಅವತರಿಸಿದ. ಕಂಸನನ್ನು ಕೊಂದು ಶೂರಸೇನನನ್ನು ಮರಳಿ ರಾಜನನ್ನಾಗಿ ಮಾಡಿದ ಕೃಷ್ಣ, ನರಕಾಸುರನನ್ನು ಕೊಂದು, ಆತನ ಕೈಕೆಳಗಿನ ರಾಜಕುಮಾರಿಯರನ್ನು ಬಿಡುಗಡೆಗೊಳಿಸಿದ. ಹೀಗೆ ಬಿಡುಗಡೆಗೊಂಡ ರಾಜಕುಮಾರಿಯರು ಶೀಲ ಶಂಕಿಸುವ ಸಮಾಜಕ್ಕೆ ಹೆದರಿದಾಗ ಅವರಿಗೆ ಅಭಯವನ್ನು ಕೊಟ್ಟು, ಅವರನ್ನು ತಾನೇ ಮದುವೆಯಾಗಿ ಅವರ ಗೌರವವನ್ನು ಕಾಪಾಡಿದ. ಜರಾಸಂಧ ಕೃಷ್ಣನ ಮೇಲೆ ಸುಮಾರು 23 ಅಕ್ಷೋಹಿಣಿ ಸೈನ್ಯದೊಂದಿಗೆ ದಾಳಿ ಮಾಡಿದಾಗ ಓಡಿ ಹೋದಂತೆ ನಟಿಸಿ, ನಂತರ ಭೀಮಾರ್ಜುನರೊಂದಿಗೆ ಜರಾಸಂಧನನ್ನು ಸಂಧಿಸಿ- ಅಲ್ಲಿ ನಡೆದ ಮಲ್ಲ ಯುದ್ಧದಲ್ಲಿ ಭೀಮನಿಂದ ಜರಾಸಂಧನ ವಧೆಯಾಗುವಂತೆ ಮಾಡಿದ ಹಾಗೂ ಆತನ ಸೆರೆಯಲ್ಲಿದ್ದ ಎಲ್ಲಾ ರಾಜಕುಮಾರರನ್ನು ಅವರವರ ರಾಜ್ಯಕ್ಕೆ ಕಳುಹಿಸಿಕೊಟ್ಟ.

ಹೀಗೆ ಇಡೀ ಭೂಲೋಕ ಅಧರ್ಮದ ದಾಸ್ಯಕ್ಕೆ ಗುರಿಯಾಗುವ ಸಂದರ್ಭ ಬಂದಾಗ ಮಾತ್ರ ಭಗವಂತನ ಅವತಾರ ಭೂಲೋಕದಲ್ಲಿ ಆಗುತ್ತದೆ.

ಪರಿತ್ರಾಣಾಯ ಸಾಧೂನಾಂ ವಿನಾಶಾಯ ಚ ದುಷ್ಕೃತಾಮ್ ।
ಧರ್ಮಸಂಸ್ಥಾಪನಾರ್ಥಾಯ ಸಂಭವಾಮಿ ಯುಗೇಯುಗೇ ॥೮॥

ಪರಿತ್ರಾಣಾಯ ಸಾಧೂನಾಮ್ ವಿನಾಶಾಯ ಚ ದುಷ್ಕೃತಾಮ್ ।
ಧರ್ಮ ಸಂಸ್ಥಾಪನ ಅರ್ಥಾಯ ಸಂಭವಾಮಿ ಯುಗೇಯುಗೇ--ಸಜ್ಜನರನ್ನು ಉಳಿಸಲೆಂದು, ಕೇಡಿಗರನ್ನು ಅಳಿಸಲೆಂದು, ಧರ್ಮವನ್ನು ನೆಲೆಗೊಳಿಸಲೆಂದು ಯುಗ ಯುಗದಲ್ಲೂ ಮೂಡಿಬರುತ್ತೇನೆ.

ಯಾರು ಸಮಾಜಕ್ಕೆ ಕೆಟ್ಟದ್ದನ್ನು, ಕೇಡನ್ನು ಮಾಡಿ ಅದರಿಂದ ಲಾಭ ಪಡೆದು ಮೆರೆಯುತ್ತಾರೋ, ಅಂಥವರ ಪೂರ್ಣನಾಶಕ್ಕಾಗಿ, ಸಜ್ಜನರ ಮತ್ತು ಪ್ರಪಂಚದ ಸಮಗ್ರ ರಕ್ಷಣೆಗಾಗಿ, ಧರ್ಮದ ಬೀಜ ಬಿತ್ತಲು ಭಗವಂತ ಭೂಲೋಕದಲ್ಲಿ ಅವತರಿಸುತ್ತಾನೆ. ಇಲ್ಲಿ ಯುಗೇ-ಯುಗೇ ಎಂದರೆ 'ಯುಗ-ಯುಗದಲ್ಲೂ' ಎಂದರ್ಥ. ಅಂದರೆ ಭಗವಂತ ಪ್ರತೀ ಯುಗದಲ್ಲೂ ಅವತರಿಸುತ್ತಾನೆ ಎಂದರ್ಥವಲ್ಲ. ಆತ ಅವತರಿಸುವುದು ಮೇಲೆ ಹೇಳಿದ ಸಂದರ್ಭ ಬಂದಾಗ ಮಾತ್ರ. ಒಂದೊಂದು ಯುಗದಲ್ಲಿ ಅನೇಕ ಅವತಾರವಿರಬಹುದು; ಇನ್ನು ಕೆಲವು ಯುಗದಲ್ಲಿ ಅವತಾರವೇ ಇಲ್ಲದಿರಬಹುದು. ಆದರೆ ಭಗವಂತನ ಆವಿರ್ಭಾವವಿರುವ ಅನೇಕ ಮಹಾಪುರುಷರು ಯುಗ-ಯುಗದಲ್ಲೂ ಬಂದು ಹೋಗುತ್ತಿರುತ್ತಾರೆ. ಅವರ ಮುಖೇನ ಭಗವಂತನ ಧರ್ಮ ರಕ್ಷಣೆ ಯುಗ ಯುಗದಲ್ಲೂ ನಿರಂತರ.

ಜನ್ಮ ಕರ್ಮ ಚ ಮೇ ದಿವ್ಯಮೇವಂ ಯೋ ವೇತ್ತಿ ತತ್ವತಃ ।
ತ್ಯಕ್ತ್ವಾ ದೇಹಂ ಪುನರ್ಜನ್ಮ ನೈತಿ ಮಾಮೇತಿ ಸೋಽರ್ಜುನ ॥೯॥

ಜನ್ಮ ಕರ್ಮ ಚ ಮೇ ದಿವ್ಯಮ್ ಏವಮ್ ಯಃ ವೇತ್ತಿ ತತ್ವತಃ ।
ತ್ಯಕ್ತ್ವಾ ದೇಹಮ್ ಪುನಃ ಜನ್ಮ ನ ಏತಿ ಮಾಮ್ ಏತಿ ಸಃ ಅರ್ಜುನ-ಹೀಗೆ ನನ್ನ ಅಲೌಕಿಕವಾದ ಹುಟ್ಟಿನ, ಕಜ್ಜದ ನಿಜವನ್ನರಿತವನು ದೇಹವನ್ನು ತೊರೆದು ಮರಳಿ ಹುಟ್ಟುವುದಿಲ್ಲ. ಅರ್ಜುನಾ-ಅವನು ನನ್ನನ್ನು ಸೇರುತ್ತಾನೆ.

ಹೀಗೆ ಭಗವಂತನ ಜ್ಞಾನಾನಂದಮಯ, ದಿವ್ಯ(Divine), ಲೀಲಾಮಯ ಅವತಾರದ ಅರಿವು ಯಥಾವತ್ತಾಗಿ(ತತ್ವತಃ) ಅರಿತರೆ, ಅದು ನಮಗೆ ಮೋಕ್ಷ ಮಾರ್ಗವನ್ನು ತೋರಬಲ್ಲದು. ಇದು ಮರು-ಹುಟ್ಟಿಲ್ಲದ ಮೋಕ್ಷವನ್ನು ಪಡೆಯಲು ಬೇಕಾದ ಒಂದು ಅಮೂಲ್ಯ ಜ್ಞಾನ. ಈ ರೀತಿ ಅಧಿಷ್ಠಾನದಿಂದ ಸಿದ್ಧಿಯನ್ನು ಪಡೆದವರ ಬಗ್ಗೆ ಕೃಷ್ಣ ಮುಂದೆ ವಿವರಿಸುತ್ತಾನೆ.

ವೀತರಾಗಭಯಕ್ರೋಧಾ ಮನ್ಮಯಾ ಮಾಮುಪಾಶ್ರಿತಾಃ ।
ಬಹವೋ ಜ್ಞಾನತಪಸಾ ಪೂತಾ ಮದ್ಭಾವಮಾಗತಾಃ ॥೧೦॥

ವೀತ ರಾಗ ಭಯ ಕ್ರೋಧಾಃ ಮತ್ ಮಯಾ ಮಾಮ್ ಉಪಾಶ್ರಿತಾಃ ।
ಬಹವಃ ಜ್ಞಾನ ತಪಸಾ ಪೂತಾಃ ಮತ್ ಭಾವಮ್ ಆಗತಾಃ -- ರಾಗ-ಭಯ-ಕ್ರೋಧವನ್ನು ತೊರೆದವರು, ಎಲ್ಲೆಲ್ಲೂ ನನ್ನನ್ನೇ ಕಾಣುವವರು(ನನ್ನ ಹಿರಿಮೆಯನ್ನು ಅರಿತವರು), ನನಗೆ ಶರಣು ಬಂದವರು ಬಹಳ ಮಂದಿ- ತಿಳಿವಿನ ತಪಸ್ಸಿನಿಂದ ತಿಳಿಗೊಂಡು ನನ್ನನ್ನು ಸೇರಿದ್ದಾರೆ.

ಮೂರನೇ ಅಧ್ಯಾಯದ ಕೊನೆಯಲ್ಲಿ(ಶ್ಲೋಕ-39) ಕೃಷ್ಣ ಹೇಳಿದಂತೆ ರಾಗ-ದ್ವೇಷಾದಿಗಳು ನಮ್ಮ ಪರಮ ಶತ್ರುಗಳು. ನಾವು ನಮ್ಮ ಜೀವನದ ಸರ್ವ ಸಮಸ್ಯೆಗಳಿಗೆ ಕಾರಣವಾದ ಒಲವು(ಆಸೆ,ರಾಗ, Attachment), ಅಂಜಿಕೆ (ಭಯ) ಮತ್ತು ಕೋಪ(ಸಿಟ್ಟು)ವನ್ನು ತೊರೆದು, ಏನು ಇದೆಯೋ ಅದರಲ್ಲಿ ಸಂತೋಷಪಡುವುದನ್ನು ಮತ್ತು ಏನು ಬಂತೋ ಅದನ್ನು ಸಂತೋಷದಿಂದ ಸ್ವೀಕರಿಸುವ ಮನೋವೃತ್ತಿಯನ್ನು ಬೆಳೆಸಿಕೊಂಡು, ಮನ್ಮಯರಾಗಬೇಕು. 'ಮನ್ಮಯ' ಅಂದರೆ ಜೀವನದ ಎಲ್ಲಾ ನಡೆಗಳಲ್ಲಿ ಭಗವಂತನನ್ನು ತುಂಬಿಸಿಕೊಳ್ಳುವುದು ಮತ್ತು ಲೌಕಿಕ ಪ್ರಜ್ಞೆಯನ್ನು ಕಡಿಮೆ ಮಾಡಿಕೊಳ್ಳುವುದು. ಒಮ್ಮೆ ನಾವು ಭಗವಂತನ ಚಿಂತನೆಯಲ್ಲಿ ತೊಡಗಿದಾಗ ಈ ರಾಗ-ದ್ವೇಷಗಳು ಕ್ಷುಲ್ಲಕವಾಗಿ ಕಾಣಲಾರಂಭಿಸುತ್ತವೆ. ಭಗವಂತ ಸರ್ವೋತ್ತಮ ಎನ್ನುವ ಸತ್ಯವನ್ನರಿತು, ನಮ್ಮ ರಕ್ಷಣೆಗೆ ಸದಾ ಆತನಿದ್ದಾನೆ ಎಂದು ತಿಳಿದು, ದುರಾಭಿಮಾನವನ್ನು ಕಿತ್ತೆಸೆದು, ಆ ಭಗವಂತನಲ್ಲಿ ಶರಣಾದವರು ಮೋಕ್ಷ ಮಾರ್ಗವನ್ನು ಕಾಣುತ್ತಾರೆ. ನಮ್ಮ ಜೀವನದ ಪ್ರತಿಯೊಂದು ಕರ್ಮದಲ್ಲಿ ಈ ರೀತಿಯ ಭಾವನೆಯನ್ನು ಬೆಳೆಸಿಕೊಳ್ಳುವುದು ಒಂದು ತಪಸ್ಸು. ಇದರಿಂದ ನಮ್ಮ ಬದುಕು ಪವಿತ್ರವಾಗುತ್ತದೆ. ಹೀಗೆ ರಾಗ-ದ್ವೇಷದ ಕೊಳೆಯಿಂದ ಮುಕ್ತರಾದವರು ನನ್ನನ್ನು ಸೇರುತ್ತಾರೆ ಎನ್ನುತ್ತಾನೆ ಕೃಷ್ಣ. ನಾವು ನಮ್ಮ ರಾಗ ದ್ವೇಷ-ಕ್ರೋಧದಲ್ಲಿ ಕೂಡಾ ಭಗವಂತನನ್ನು ಕುಳ್ಳಿರಿಸಿಕೊಳ್ಳಬೇಕು! ನಮ್ಮ ಆಸೆ-ಭಗವಂತನನ್ನು ಕಾಣುವ ಆಸೆಯಾಗಿರಬೇಕು; ಭಯ-'ತಪ್ಪು ಮಾಡಿದರೆ ಭಗವಂತ ನನ್ನನ್ನು ಕ್ಷಮಿಸಲಾರ' ಎನ್ನುವ ಭಯವಾಗಿರಬೇಕು; ನಮ್ಮ ಇಲ್ಲ ಸಲ್ಲದ ಇಂದ್ರಿಯಾಕಾಂಕ್ಷೆಗಳ ಮೇಲೆ ನಮ್ಮ ಕೋಪವಿರಬೇಕು. ಹೀಗೆ ಈ ಮೂರು ಶತ್ರುಗಳನ್ನು ನಾವು ಭಗವಂತನ ಪರಗೊಳಿಸಿದಾಗ ಭಗವಂತನನ್ನು ಕಾಣಲು ಸಾಧ್ಯ.

ಯೇ ಯಥಾ ಮಾಂ ಪ್ರಪದ್ಯಂತೇ ತಾಂಸ್ತಥೈವ ಭಜಾಮ್ಯಹಮ್ ।
ಮಮ ವರ್ತ್ಮಾನುವರ್ತಂತೇ ಮನುಷ್ಯಾಃ ಪಾರ್ಥ ಸರ್ವಶಃ ॥೧೧॥

ಯೇ ಯಥಾ ಮಾಮ್ ಪ್ರಪದ್ಯಂತೇ ತಾನ್ ತಥಾ ಏವ ಭಜಾಮಿ ಅಹಮ್ ।
ಮಮ ವರ್ತ್ಮ ಅನುವರ್ತಂತೇ ಮನುಷ್ಯಾಃ ಪಾರ್ಥ ಸರ್ವಶಃ -ಯಾರು ಹೇಗೆ ನನ್ನನು ಸೇವಿಸುತ್ತಾರೋ ಅವರನ್ನು ಹಾಗೆಯೇ ನಾನು ಅನುಗ್ರಹಿಸುತ್ತೇನೆ. ಓ ಪಾರ್ಥಾ, ಮನುಷ್ಯರು ಯಾವ ದಾರಿಯಲ್ಲಿ ಸಾಗಿದರೂ ಕೊನೆಗೆ ನನ್ನೆಡೆಗೆಯೇ ಬರುತ್ತಾರೆ.

ದೇವರ ಉಪಾಸನೆಗೆ ಸರಿಯಾದ ದಾರಿ ಯಾವುದು? ಒಬ್ಬಬ್ಬರು ಒಂದೊಂದು ರೀತಿ ಉಪಾಸನೆ ಮಾಡುತ್ತಾರೆ. ಅದರಿಂದ ಗೊಂದಲ, ಆವೇಶ. ಯಾರು ಯಾವ ರೀತಿ ಉಪಾಸನೆ ಮಾಡುತ್ತಾರೋ ಭಗವಂತ ಹಾಗೆಯೇ ಅನುಗ್ರಹಿಸುತ್ತಾನೆ. ನಾವು ಯಾವ ರೂಪದಿಂದ ಉಪಾಸನೆ ಮಾಡಿದರೂ ಅದು ವಿಶ್ವರೂಪನಾದ ಭಗವಂತನನ್ನು ಸೇರುತ್ತದೆ. ಅದಕ್ಕಾಗಿ ನಾವು ನಮ್ಮ ಪೂಜೆಯನ್ನು ಭಗವಂತನ ವಿಶೇಷ ವಿಭೂತಿ ಇರುವ ತುಳಸಿ, ಅಶ್ವತ್ಥವೃಕ್ಷ, ಗೋವು ಇತ್ಯಾದಿ ರೂಪದಲ್ಲಿ ಪೂಜಿಸುತ್ತೇವೆ. ಆದರೆ ಇಲ್ಲಿ ಒಂದು ಎಚ್ಚರ ಅಗತ್ಯ. ತುಳಸಿ ಗಿಡವನ್ನೇ ಭಗವಂತನೆಂದು ನಂಬಿ ಪೂಜಿಸದೇ, ತುಳಸಿಯಲ್ಲಿ ಭಗವಂತನ ವಿಶೇಷ ವಿಭೂತಿ ಅಡಗಿದೆ ಎಂದು

ಪೂಜಿಸುವುದು ಮುಖ್ಯ. ಹೀಗೆ ನಮ್ಮ ಪ್ರತಿಯೊಂದು ಕ್ರಿಯೆಯಲ್ಲಿ ನಮಗೆ ಭಗವಂತನ ಎಚ್ಚರ ಮತ್ತು ಜ್ಞಾನ ಅಗತ್ಯ. ಯಾವ ಹೆಸರಿನಿಂದ ಭಗವಂತನನ್ನು ಕರೆದರೂ ಅದು ಸರ್ವಶಬ್ದ ವಾಚ್ಯ ಭಗವಂತನ ನಾಮ ಎನ್ನುವ ಎಚ್ಚರ ಅಗತ್ಯ. ಎಲ್ಲಿ ಕುಳಿತು ಪೂರ್ಣ ಅರ್ಪಣಾಭಾವದಿಂದ ಭಗವಂತನನ್ನು ನೆನೆದರೂ, ಅದು ವಿಶ್ವರೂಪಿ ವಿಶ್ವಾಂಭರನನ್ನು ಸೇರುತ್ತದೆ. ಆತ ಸದಾ ನಮ್ಮ ರಕ್ಷಣೆ ಮಾಡುತ್ತಾನೆ.

ಕಾಂಕ್ಷಂತಃ ಕರ್ಮಣಾಂ ಸಿದ್ಧಿಂ ಯಜಂತ ಇಹ ದೇವತಾಃ
ಕ್ಷಿಪ್ರಂ ಹಿ ಮಾನುಷೇ ಲೋಕೇ ಸಿದ್ಧಿರ್ಭವತಿ ಕರ್ಮಜಾ ॥೧೨॥

ಕಾಂಕ್ಷಂತಃ ಕರ್ಮಣಾಮ್ ಸಿದ್ಧಿಮ್ ಯಜಂತೇ ಇಹ ದೇವತಾಃ ।
ಕ್ಷಿಪ್ರಮ್ ಹಿ ಮಾನುಷೇ ಲೋಕೇ ಸಿದ್ಧಿಃ ಭವತಿ ಕರ್ಮಜಾ -ಕರ್ಮಗಳ ಮೂಲಕ ಫಲವನ್ನು ಬಯಸುವವರು ಇಲ್ಲಿ ದೇವತೆಗಳನ್ನು ಪೂಜಿಸುತ್ತಾರೆ. ಈ ಭೂಮಿಯಲ್ಲಿ ಕರ್ಮದಿಂದ ಫಲ ಸಿದ್ಧಿ ಒಡನೆಯೇ ಕೈಗೂಡುತ್ತದೆಯಲ್ಲವೇ ?

ನಮ್ಮಲ್ಲಿ ಕೆಲವರು ದೇವತೆಗಳಿಗೂ ಮತ್ತು ಭಗವಂತನಿಗೂ ವ್ಯತ್ಯಾಸ ತಿಳಿಯದೇ, ದೇವತಗಳನ್ನೇ ಭಗವಂತನೆಂದು ಪೂಜಿಸುತ್ತಾರೆ. ಇದು ದೇವತೆಗಳ ಬಗ್ಗೆ ನಮ್ಮಲ್ಲಿರುವ ಒಂದು ತಪ್ಪು ಕಲ್ಪನೆ. ದೇವರು ಅನೇಕ ಅಲ್ಲ ಆತ ಒಬ್ಬನೆ; ಆದರೆ ಭಗವಂತನ ಅಧೀನವಾಗಿರುವ ದೇವತೆಗಳು ಅನೇಕ. ನಾವು ತಕ್ಷಣ ಫಲ ಪಡೆಯುವ ಅಪೇಕ್ಷೆಯಿಂದ ಭಗವಂತನನ್ನು ಮರೆತು ದೇವತೆಗಳ ಸಮೂಹವನ್ನು ಪೂಜಿಸುವ ಸಂಪ್ರದಾಯವನ್ನು ಬೆಳೆಸಿಕೊಂಡುಬಿಟ್ಟಿದ್ದೇವೆ. ಈ ರೀತಿ ಮಾಡುವುದರಿಂದ ಫಲ ಸಿಗಬಹುದು- ಆದರೆ ಅದು ಅಲ್ಪಕಾಲದ್ದು. ಐಹಿಕ ಸುಖವನ್ನು ಬಯಸಿ ವಿವಿಧ ದೇವತೆಗಳನ್ನು ವಿವಿಧ ಫಲಕ್ಕಾಗಿ ಪೂಜಿಸುವುದು ನಮ್ಮನ್ನು ಶಾಶ್ವತವಾದ ಮೋಕ್ಷ ಮಾರ್ಗದತ್ತ ಕೊಂಡೊಯ್ಯಲಾರದು. ಇಂದ್ರಿಯ ಭೋಗಕ್ಕಾಗಿ ಮಾಡುವ ಪೂಜೆ- ಪೂಜೆ ಎನಿಸಲಾರದು. ದೇವತೆಗಳು ಮೋಕ್ಷ ಮಾರ್ಗದಲ್ಲಿ ನಮಗೆ ಸಹಾಯ ಮಾಡಬಲ್ಲರು, ಆದರೆ ಸರ್ವಶಕ್ತ ಭಗವಂತನ ಎಚ್ಚರ ಬಹಳ ಮುಖ್ಯ.

ಭಗವಂತನನ್ನು ಯಾವ ರೂಪದಲ್ಲೇ ಪೂಜಿಸಿದರೂ ಐಹಿಕ ಭೋಗಕ್ಕಾಗಿ ಪೂಜಿಸದೇ, ಆ ಸರ್ವಾಂತರ್ಯಾಮಿ ಭಗವಂತನನ್ನು ಸೇರುವ ಅನುಸಂಧಾನದಿಂದ ಪೂಜಿಸುವುದು ಅಧ್ಯಾತ್ಮ ಸಾಧನೆಯಲ್ಲಿ ಅತಿಮುಖ್ಯ ವಿಚಾರ. ನೀನು ನಿನ್ನ ದೇವರನ್ನು ಕೃಷ್ಣ ಎಂದರೂ ಸರಿ, ಅಲ್ಲಾಹು ಎಂದರೂ ಸರಿ. ಆದರೆ ನಮ್ಮೆಲ್ಲರನ್ನೂ ಕಾಪಾಡಿ ಪೋಷಿಸುವ ಶಕ್ತಿ ಒಂದೇ ಎನ್ನುವ ನಿಜ ತಿಳಿದಿರಲಿ. ಭಗವಂತನನ್ನು ವಿವಿಧ ರೂಪದಲ್ಲಿ ಪೂಜಿಸಬಹುದು. ಆದರೆ ವಿವಿಧ ಭೋಗಕ್ಕಾಗಿ ವಿವಿಧ ದೇವತೆಗಳನ್ನು ದೇವರೆಂದು ಪೂಜಿಸುವುದು ಅಧ್ಯಾತ್ಮ ಸಾಧನೆಯಾಗಲಾರದು. ದೇವತೆಗಳ ಮುಖೇನ ಅಥವಾ ದೇವತೆಗಳಲ್ಲಿ ಭಗವಂತನನ್ನು ಕಾಣುವುದು ತಪ್ಪಲ್ಲ. ಏಕೆಂದರೆ ಭಗವಂತ ಸರ್ವಾಂತರ್ಯಾಮಿ, ಆತನಿರದ ಸ್ಥಳವಿಲ್ಲ. ಇದನ್ನು ಬಿಟ್ಟು ದೇವತೆಗಳನ್ನೇ ಭಗವಂತ ಎಂದು ಪೂಜಿಸಿದರೆ ಅದನ್ನು ದೇವತೆಗಳೂ ಮೆಚ್ಚಲಾರರು.

ತನ್ನ ಅವತಾರದ ಉದ್ದೇಶ ಮತ್ತು ರಹಸ್ಯವನ್ನು ತಿಳಿಹೇಳಿದ ಕೃಷ್ಣ, ಅಂತಹ ಜ್ಞಾನದಿಂದ ಸಿದ್ಧಿ ಪಡೆದ ಉದಾಹರಣೆ ನೀಡಿದ. ಬಹುದೇವತಾ ವಾದವನ್ನು ತೊಡೆದು ಹಾಕಿ ದೇವರು ಒಬ್ಬನೇ, ದೇವತೆಗಳು ಹಲವು ಎನ್ನುವುದನ್ನು ಸ್ಪಷ್ಟಪಡಿಸಿದ ಹಾಗೂ ಉಪಾಸನೆ ಹೇಗಿರಬೇಕು ಎನ್ನುವುದನ್ನೂ ಸ್ಪಷ್ಟವಾಗಿ ಹೇಳಿದ. ಈ ಸಂದರ್ಭದಲ್ಲಿ ನಮಗೆ ಒಂದು ಪ್ರಶ್ನೆ ಮೂಡಬಹುದು. ಮನುಕುಲದ ಸೃಷ್ಟಿ ಈ ಭೂಮಿಯ ಮೇಲೆ ಭಗವಂತನಿಂದಾಯಿತು. ಆದರೆ ಒಬ್ಬ ಮಾನವ ಇನ್ನೊಬ್ಬನಂತಿಲ್ಲ. ಸ್ವಭಾವ ವೈವಿಧ್ಯತೆಯ ಮೂಲವೇನು? ಭಗವಂತ ಒಬ್ಬಬ್ಬರನ್ನು ಒಂದೊಂದು ರೀತಿ ಏಕೆ ಸೃಷ್ಟಿ ಮಾಡಿದ್ದಾನೆ? ಈ ಪ್ರಶ್ನೆಗೆ ಮುಂದಿನ ಶ್ಲೋಕದಲ್ಲಿ ಕೃಷ್ಣ ಉತ್ತರಿಸುತ್ತಾನೆ.

ಚಾತುರ್ವರ್ಣ್ಯಂ ಮಯಾ ಸೃಷ್ಟಂ ಗುಣಕರ್ಮವಿಭಾಗಶಃ ।
ತಸ್ಯ ಕರ್ತಾರಮಪಿ ಮಾಂ ವಿದ್ಧ್ಯಕರ್ತಾರಮವ್ಯಯಮ್ ॥೧೩॥

ಚಾತುರ್ವರ್ಣ್ಯಮ್ ಮಯಾ ಸೃಷ್ಟಂ ಗುಣಕರ್ಮ ವಿಭಾಗಶಃ ।
ತಸ್ಯ ಕರ್ತಾರಮ್ ಅಪಿ ಮಾಮ್ ವಿದ್ಧಿ ಅಕರ್ತಾರಮ್ ಅವ್ಯಯಮ್ -- ತ್ರಿಗುಣಗಳು ಮತ್ತು ಕರ್ಮಗಳ ವಿಂಗಡಣೆಯಿಂದ ನಾಲ್ಕು ವರ್ಣಗಳ ಗುಂಪನ್ನು ನಿರ್ಮಿಸಿದೆ. ಏತರಿಂದಲೂ ಬದಲಾವಣೆಗೊಳ್ಳದ ನಾನು ಅದನ್ನು ಮಾಡಿದರೂ ನಿಜವಾಗಿ ಏನನ್ನೂ ಮಾಡುವುದಿಲ್ಲವೆಂದು ತಿಳಿ. (ಬದಲಾವಣೆಗೊಳ್ಳದ ನಾನು ಅದನ್ನು ನಿರ್ಮಿಸಿದವನು ಮತ್ತು ನನ್ನನ್ನು ಯಾರೂ ನಿರ್ಮಿಸಿಲ್ಲ ಎಂದು ತಿಳಿ)

ಕೃಷ್ಣ ಹೇಳುತ್ತಾನೆ: "ನಾನು ಗುಣಕರ್ಮವಿಭಾಗಶಃ ನಾಲ್ಕು ವರ್ಣಗಳನ್ನು ಸೃಷ್ಟಿ ಮಾಡಿದೆ ಎಂದು". ನಮಗೆ ತಿಳಿದಂತೆ ನಾಲ್ಕು ವರ್ಣಗಳು- ಬ್ರಾಹ್ಮಣ, ಕ್ಷತ್ರಿಯ, ವೈಶ್ಯ ಮತ್ತು ಶೂದ್ರ. ಭಗವಂತನ ಈ ನುಡಿಯನ್ನು ತಪ್ಪಾಗಿ ಅರ್ಥೈಸುವವರೇ ಹೆಚ್ಚು. ಭಗವಂತನೇ ನಾಲ್ಕು ವರ್ಣಗಳನ್ನು ಸೃಷ್ಟಿಸಿದರೆ ಈ ವರ್ಣಭೇದ ಭಾರತವನ್ನು ಬಿಟ್ಟು ಬೇರೆ ದೇಶದಲ್ಲಿ ಏಕಿಲ್ಲ ಎಂದು ಪ್ರಶ್ನಿಸುವವರಿದ್ದಾರೆ. ಮೂಲಭೂತವಾಗಿ ನೋಡಿದರೆ ಕೃಷ್ಣ ಇಲ್ಲಿ ಹೇಳಿರುವುದು ಜಾತಿಯ ಬಗ್ಗೆ ಅಲ್ಲ-ಬದಲಿಗೆ ನಾಲ್ಕು ವರ್ಣಗಳ ಬಗ್ಗೆ. ವರ್ಣ ಮತ್ತು ಜಾತಿಯನ್ನು ಸಂಕೀರ್ಣವಾಗಿ ಕೂಡಾ ಬಳಸುತ್ತಾರೆ. ಸಂಸ್ಕೃತದಲ್ಲಿ ಒಂದು ಪದಕ್ಕೆ ಅನೇಕ ಅರ್ಥಗಳಿರುತ್ತವೆ. ಒಂದು ಪದಕ್ಕೆ ಅನೇಕ ಆಯಾಮವಿರುವುದರಿಂದ ನಮಗೆ ಕೆಲವೊಮ್ಮೆ ಗೊಂದಲವಾಗುತ್ತದೆ. ಜಾತಿ ಎನ್ನುವುದಕ್ಕೆ ಎರಡು ಅರ್ಥವಿದೆ. ಒಂದು ಹುಟ್ಟುಗುಣ ಸ್ವಭಾವ(ಜೀವ ಸ್ವಭಾವ-ಹುಟ್ಟುವಾಗಲೇ ಪಡೆದುಕೊಂಡು ಬಂದಿದ್ದು, ಮೂಲ ತ್ರೈಗುಣ್ಯಕ್ಕೆ ಸಂಬಂಧಪಟ್ಟದ್ದು) ಅದು ವರ್ಣ; ಇನ್ನೊಂದು ಯಾವ ಮನೆಯಲ್ಲಿ ಹುಟ್ಟಿದನೋ ಆ ಜಾತಿ (ಬ್ರಾಹ್ಮಣರ ಮನೆಯಲ್ಲಿ ಹುಟ್ಟಿದ ಹುಡುಗ ಬ್ರಾಹ್ಮಣ ಹುಡುಗ, ಕ್ಷತ್ರಿಯನ ಮನೆಯಲ್ಲಿ ಹುಟ್ಟಿದ ಹುಡುಗ ಕ್ಷತ್ರಿಯ ಹುಡುಗ). ಈ ಸೂಕ್ಷ್ಮ ಅರಿಯದಿದ್ದರೆ ಇಲ್ಲಿ ನಮಗೆ ಗೊಂದಲವಾಗುತ್ತದೆ. ಆದ್ದರಿಂದ ಈ ಶ್ಲೋಕದಲ್ಲಿ ವರ್ಣ ಎಂದರೆ ಮೂಲ ಹುಟ್ಟು ಸ್ವಭಾವ.

ವರ್ಣ ಅಂದರೆ ಬಣ್ಣ. ಒಬ್ಬ ಮನುಷ್ಯನ ಬಣ್ಣ ಅಂದರೆ ಏನು ? "ಆತನ ಬಣ್ಣ ಬಯಲಾಯಿತು" ಎಂದು ಸಾಮಾನ್ಯವಾಗಿ ನಾವು ಹೇಳುವುದಿದೆ. ಒಬ್ಬನ ಬಣ್ಣ ಬಯಲಾಗುವುದು ಎಂದರೆ ಆತನ ನಿಜ ವ್ಯಕ್ತಿತ್ವ

ಬಯಲಾಗುವುದು. ಇಲ್ಲಿ ಬಣ್ಣ ಎಂದು ಹೇಳಲು ಇನ್ನೊಂದು ಕಾರಣವಿದೆ. ನಮ್ಮ ಸ್ವಭಾವಕ್ಕೆ ಬಣ್ಣವಿದೆ [ಇದು ನಮ್ಮ ಕಣ್ಣಿಗೆ ಕಾಣದ ಬಣ್ಣ]. ಸಾತ್ವಿಕ-ಬಿಳಿ; ರಾಜಸ-ಕೆಂಪು; ತಾಮಸ-ಕಪ್ಪು. ಹೀಗೆ ಬಣ್ಣ ಸ್ವಭಾವವನ್ನು ಪ್ರತಿನಿಧಿಸುತ್ತದೆ. ಅಷ್ಟೇ ಅಲ್ಲದೇ ನಮ್ಮ ಸ್ವಭಾವ ನಮ್ಮೊಳಗಿನ ಒಂದು ಶಕ್ತಿ. ನಮ್ಮ ಭಾವನೆಗನುಗುಣವಾಗಿ ನಮ್ಮ ದೇಹ ಬಣ್ಣದ ಕಿರಣಗಳನ್ನು ಹೊರಹೊಮ್ಮುತ್ತದೆ[ಇದು ಸಾಮಾನ್ಯ ಮನುಷ್ಯನ ಕಣ್ಣಿಗೆ ಕಾಣದು]. ತುಂಬಾ ಕೋಪ ಬಂದಾಗ ಮೈಯಿಂದ ಕೆಂಪು ಕಿರಣ; ಮನಸ್ಸು ಪ್ರಸನ್ನವಾಗಿದ್ದಾಗ ಹಸಿರು ಕಿರಣ; ಜ್ಞಾನದ ಆಳ ತಿಳಿದ ಜ್ಞಾನಿಯ ಮೈಯಿಂದ ನೀಲ ಕಿರಣ. ಹೀಗೆ ಬಣ್ಣ ನಮ್ಮ ಒಳಗಿನ ಸ್ವಭಾವವನ್ನು ಪ್ರತಿನಿಧಿಸುತ್ತದೆ. ಈ ಕಾರಣಕ್ಕಾಗಿ ಜ್ಞಾನಾನಂದಮಯನಾದ ಭಗವಂತ ನೀಲಮೇಘಶ್ಯಾಮ.

ಮೇಲಿನ ವಿವರವನ್ನು ತಿಳಿದಾಗ ಸ್ಪಷ್ಟವಾಗಿ ನಮಗೆ ಅರ್ಥವಾಗುವುದು ಒಂದು ವಿಚಾರ. ಜಾತಿ ಹುಟ್ಟಿದ ಮನೆಗೆ ಮತ್ತು ತಂದೆ-ತಾಯಿಯನ್ನು ಅವಲಂಬಿಸಿ ಬರುವುದು. ವರ್ಣ ಎನ್ನುವುದು ನಮ್ಮ ಅಂತರಂಗ ಪ್ರಪಂಚ-ನಮ್ಮ ಮೂಲ ಸ್ವಭಾವ. ಈ ವರ್ಣವನ್ನು ಪ್ರಪಂಚದ ಮೂಲೆ ಮೂಲೆಯಲ್ಲೂ ಕಾಣಬಹುದು. ಭಾರತದಲ್ಲಿ ಶಾಸ್ತ್ರಕಾರರು ಇದನ್ನು ಗುರುತಿಸಿ ಅದಕ್ಕೆ ಬ್ರಾಹ್ಮಣ, ಕ್ಷತ್ರಿಯ, ವೈಶ್ಯ ಮತ್ತು ಶೂದ್ರ ಎನ್ನುವ ಹೆಸರು ಕೊಟ್ಟರು ಅಷ್ಟೇ. ಜಾತಿ ಜನ್ಮತಃ ಆದರೆ ವರ್ಣಗಳನ್ನು ಗುಣಕರ್ಮದಿಂದ ವಿಭಾಗಿಸಿರುವುದು. ಬ್ರಾಹ್ಮಣರ ಮನೆಯಲ್ಲಿ ಹುಟ್ಟುವ ಹುಡುಗ ಬ್ರಾಹ್ಮಣ ಜಾತಿಯ ಹುಡುಗ. ಆದರೆ ಆತ ಸ್ವಭಾವತಃ ಕ್ಷತ್ರಿಯನಾಗಿರಲೂಬಹುದು; ಒಂದೇ ಮನೆಯಲ್ಲಿ ನಾಲ್ಕು ವರ್ಣದ ಮಕ್ಕಳು ಹುಟ್ಟಲೂಬಹುದು. ಬೆಸ್ತರ ಹುಡುಗಿಯಲ್ಲಿ ಹುಟ್ಟಿದ ವೇದವ್ಯಾಸರು ಮಹಾಬ್ರಾಹ್ಮಣ. ಇದು ವರ್ಣವನ್ನು ಅವಲಂಬಿಸಿ ಬಂದದ್ದು. ಅದೇ ವೇದವ್ಯಾಸರ ಮಗ, ಶ್ರೇಷ್ಠ ಜ್ಞಾನಿ-ವಿದುರ 'ಕ್ಷತ್ತಾ'(ಕೆಲಸದವಳ ಮಗ). ಇದು ಸಾಮಾಜಿಕ ರಾಜಕೀಯದಿಂದ ಬಂದಿದ್ದು! ಜೀವಸ್ವಭಾವ ಮತ್ತು ಕರ್ಮಕ್ಕನುಗುಣವಾಗಿ ಭಗವಂತ ಒಂದು ವರ್ಣವನ್ನು ಜೀವಕ್ಕೆ ಹುಟ್ಟುವಾಗಲೇ ಕೊಟ್ಟಿರುತ್ತಾನೆ.

ವರ್ಣ ಇಲ್ಲದೆ ಸಮಾಜ ಸುಗಮವಾಗಿ ನಡೆಯದು. ಪುರುಷಸೂಕ್ತದಲ್ಲಿ ಈ ನಾಲ್ಕು ವರ್ಣಗಳನ್ನು ಆಯಾ ವರ್ಣದ ಕರ್ಮಕ್ಕನುಗುಣವಾಗಿ ದೇಹದ ನಾಲ್ಕು ಭಾಗವಾಗಿ ಈ ರೀತಿ ವಿವರಿಸಿದ್ದಾರೆ:

ಬ್ರಾಹ್ಮಣೋಸ್ಯ ಮುಖಮಾಸೀತ್ । ಬಾಹೂ ರಾಜನ್ಯಃ ಕೃತಃ ।
ಊರೂ ತದಸ್ಯ ಯದ್ವೈಶ್ಯಃ । ಪದ್ಭ್ಯಾಗಮ್ ಶೂದ್ರೋ ಅಜಾಯತ ॥

ದೇಹಕ್ಕೆ ಪಂಚಾಗವಾಗಿರುವ ಹಾಗೂ ಪೂಜೆಯಲ್ಲಿ ಶ್ರೇಷ್ಠ ಎನಿಸಿದ ಪಾದವನ್ನು ಶೂದ್ರನಿಗೆ ಹೋಲಿಸಿದರು. ಇದು ದೇಹದ ಅಡಿಪಾಯ. ಶೂದ್ರ ಎಂದರೆ ದುಃಖದಲ್ಲಿ ಕರಗಿದವ ಎಂದರ್ಥ. ಈತನಲ್ಲಿ ಅರಸೊತ್ತಿಗೆ ಇರುವುದಿಲ್ಲ. ಆದರೆ ಇನ್ನೊಬ್ಬರ ಸೇವೆ ಮಾಡುವ ಸೇವಾ ಗುಣ ಮಹತ್ವವಾಗಿರುತ್ತದೆ **(Service Quality)**. ಈ ಗುಣ ಇಲ್ಲದವ ಮನುಷ್ಯನೇ ಅಲ್ಲ. ಯಾರೂ ಏಕವರ್ಣದವರಲ್ಲ. ಎಲ್ಲರಲ್ಲೂ ಎಲ್ಲಾ ಸ್ವಭಾವವಿರುತ್ತದೆ. ಯಾವ ಸ್ವಭಾವ ನಮ್ಮಲ್ಲಿ ಹೆಚ್ಚಾಗಿದೆಯೋ**(majority)** ನಾವು ಆ ವರ್ಣಕ್ಕೆ ಸೇರುತ್ತೇವೆ. ಶೂದ್ರ ಸ್ವಭಾವ ಎಷ್ಟು ಮುಖ್ಯ ಎಂದರೆ ಈ ಸ್ವಭಾವ ಇಲ್ಲದೆ ಬೇರೆ ಸ್ವಭಾವಕ್ಕೆ ಬೆಲೆಯೇ ಇಲ್ಲ. ಯಾವಾಗಲೂ ನಾವು ಮಾಡುವ ಕರ್ಮವನ್ನು ಸೇವಾ ಮನೋವೃತ್ತಿಯಿಂದ ಮಾಡಬೇಕು. ಉದಾಹರಣೆಗೆ: ಬ್ರಾಹ್ಮಣನಾದವನು ಸಮಾಜ ಸೇವೆಯ ಭಾವನೆಯಿಂದ ಜ್ಞಾನದಾನ ಮಾಡಬೇಕು. ಇಲ್ಲದಿದ್ದರೆ ಅದು ಜ್ಞಾನದಾನವೆನಿಸುವುದಿಲ್ಲ.

ವೈಶ್ಯನನ್ನು ದೇಹದ ಸೊಂಟದ ಭಾಗಕ್ಕೆ ಹೋಲಿಸಿದರು. ಕಾರಣ ಈತನ ಸ್ವಭಾವ ವ್ಯಾಪಾರ ಮತ್ತು ವಾಣಿಜ್ಯ**(Production)**. ಸಾಮಾನ್ಯವಾಗಿ ಹಿಂದಿನ ಕಾಲದ ಜೀವನ ಪದ್ಧತಿಯಂತೆ ವೈಶ್ಯರು ಒಂದು

ಊರಿನಿಂದ ಇನ್ನೊಂದು ಊರಿಗೆ ಸಂಚರಿಸುತ್ತಾ ತಮ್ಮ ವ್ಯಾಪಾರವನ್ನು ಮಾಡುತ್ತಿದ್ದರು. ಆದ್ದರಿಂದ ಅವರನ್ನು ಸೊಂಟಕ್ಕೆ ಹೋಲಿಸಿದ್ದಾರೆ.

ಕ್ಷತ್ರಿಯರ ಸ್ವಭಾವ ತಮ್ಮ ತೋಳ್ಬಲದಿಂದ ಸಮಾಜದ ರಕ್ಷಣೆ ಮಾಡುವುದು ಮತ್ತು ಆಡಳಿತ **(Protection and Administration)** ನೆಡೆಸುವುದಾದ್ದರಿಂದ ಅವರನ್ನು ತೋಳಿಗೆ ಹೋಲಿಸಿದ್ದಾರೆ.

ಇನ್ನು ಬ್ರಾಹ್ಮಣ ಸ್ವಭಾವ; ಇವರ ಮೂಲಕರ್ಮ ಜ್ಞಾನದ ಮಾರ್ಗದರ್ಶನ**(Wisdom).** ಅದಕ್ಕಾಗಿ ಇವರನ್ನು ತಲೆಗೆ ಹೋಲಿಸಿದರು. ಸ್ವಭಾವತಃ ಬ್ರಾಹ್ಮಣ ಎನಿಸಿದವನು ಸದಾ ಭಗವಂತನ ಚಿಂತನೆ, ಇಂದ್ರಿಯ ನಿಗ್ರಹ, ಸುಳ್ಳು ಹೇಳದ, ಮುಖವಾಡ ಇಲ್ಲದ ಬದುಕು, ಸದಾ ಅಂತರಂಗ ಬಹಿರಂಗ ಶುದ್ಧಿ- ಈ ಮೂಲ ಗುಣಗಳನ್ನು ಹೊಂದಿರುತ್ತಾನೆ.

ಹೀಗೆ ಈ ನಾಲ್ಕು ವರ್ಣಗಳು ಸೇರಿದರೆ ಮಾತ್ರ ಒಂದು ಪರಿಪೂರ್ಣ ಸಮಾಜ ನಿರ್ಮಾಣವಾಗಲು ಸಾಧ್ಯ. ಇಲ್ಲಿ ಮೇಲು-ಕೀಳು ಎನ್ನುವ ಭಾವನೆ ಸಲ್ಲದು. ಎಲ್ಲರೂ ಮೋಕ್ಷ ಯೋಗ್ಯ ಜೀವರೇ. ಇದು ಆಧ್ಯಾತ್ಮಿಕ ವರ್ಗೀಕರಣ ಮತ್ತು ವ್ಯವಸ್ಥೆ. 'ಇದನ್ನು ಅನಾದಿನಿತ್ಯವಾದ ಜೀವದ ಮೂಲ ಸ್ವಭಾವಕ್ಕನುಗುಣವಾಗಿ ಮತ್ತು ಕರ್ಮಕ್ಕನುಗುಣವಾಗಿ ನಾನು ಈ ಭೂಮಿ ಮೇಲೆ ಸೃಷ್ಟಿಸಿದೆ' ಎಂದಿದ್ದಾನೆ ಕೃಷ್ಣ.

ಇಲ್ಲಿ ನಾವು ತಿಳಿಯಬೇಕಾದ ಒಂದು ಮೂಲಭೂತ ಅಂಶವೇನೆಂದರೆ- ಜೀವವನ್ನು ಭಗವಂತ ಸೃಷ್ಟಿಸಿಲ್ಲ. ಜೀವ ಮತ್ತು ಜೀವಸ್ವಭಾವ ಅನಾದಿನಿತ್ಯ. ಜೀವದ ಸ್ವಭಾವಕ್ಕನುಗುಣವಾಗಿ ಅದಕ್ಕೆ ಬೇಕಾದ ದೇಹ, ಶಕ್ತಿ, ಪ್ರಪಂಚದ ನಿರ್ಮಾಣ ಮಾಡಿ, ಅದಕ್ಕೊಂದು ಅಸ್ಥಿತ್ವ ಕೊಟ್ಟು, ಜೀವಸ್ವಭಾವದ ವಿಕಾಸಕ್ಕೋಸ್ಕರ ಜೀವವನ್ನು ಬಿತ್ತಿ ಬೆಳೆಸುವವ ಭಗವಂತ. ಇಂತಹ ಭಗವಂತ ಎಲ್ಲರ ಕರ್ತಾರ. ಇಂತಹ ಭಗವಂತನಿಗೆ ಇನ್ನೊಬ್ಬ ಕರ್ತಾರನಿಲ್ಲ. ಆತ ಎಲ್ಲವುದರ ಕಾರಣ ಆದರೆ ಆತನಿಗೆ ಕಾರಣವಾದ ಇನ್ನೊಂದು ವಸ್ತು ಇಲ್ಲ. "ಬದಲಾವಣೆಗೊಳ್ಳದ ನಾನು ಅದನ್ನು ನಿರ್ಮಿಸಿದವನು ಮತ್ತು ನನ್ನನ್ನು ಯಾರೂ ನಿರ್ಮಿಸಿಲ್ಲ ಎಂದು ತಿಳಿ" ಎಂದು ಕೃಷ್ಣ ಅರ್ಜುನನಿಗೆ ಹೇಳುತ್ತಾನೆ.

ನ ಮಾಮ್ ಕರ್ಮಾಣಿ ಲಿಂಪಂತಿ ನ ಮೇ ಕರ್ಮ ಫಲೇ ಸ್ಪೃಹಾ ।
ಇತಿ ಮಾಂ ಯೋऽಭಿಜಾನಾತಿ ಕರ್ಮಭಿರ್ನ ಸ ಬಧ್ಯತೇ ॥೧೪॥

ನ ಮಾಂ ಕರ್ಮಾಣಿ ಲಿಂಪಂತಿ ನ ಮೇ ಕರ್ಮಫಲೇ ಸ್ಪೃಹಾ
ಇತಿ ಮಾಮ್ ಯಃ ಅಭಿಜಾನಾತಿ ಕರ್ಮಭಿಃ ನ ಸಃ ಬಧ್ಯತೇ-ಕರ್ಮಗಳು ನನ್ನನ್ನು ಅಂಟುವುದಿಲ್ಲ. ನನಗೆ ಕರ್ಮಫಲದ ಬಯಕೆಯಿಲ್ಲ. ಹೀಗೆಂದು ನನ್ನನ್ನು ತಿಳಿದವನು ಕರ್ಮದ ಸೆರೆಯಲ್ಲಿ ಸಿಕ್ಕಿ ಬೀಳನು.

ಭಗವಂತ ಅವರವರ ಸ್ವಭಾವಕ್ಕೆ ತಕ್ಕಂತೆ, ಅವರವರ ಕರ್ಮಕ್ಕೆ ತಕ್ಕಂತೆ (ಗುಣಕರ್ಮ ವಿಭಾಗಶಃ) ಪ್ರಪಂಚವೆಂಬ ತೋಟವನ್ನು ನಿರ್ಮಿಸಿ, ನಾಲ್ಕು ವರ್ಣದ ಮೋಕ್ಷಯೋಗ್ಯ ಮಾನವರ ಸೃಷ್ಟಿಯನ್ನು ಈ ಭೂಮಿ ಮೇಲೆ ಮಾಡಿದ. "ಇದರಿಂದ ನನಗೆ ಯಾವ ಕರ್ಮವೂ ಅಂಟುವುದಿಲ್ಲ" ಎನ್ನುತ್ತಾನೆ ಕೃಷ್ಣ. ಕರ್ಮ ಅಂಟುವುದು 'ಇದು ನನ್ನದು', 'ನಾನು ಮಾಡಿದ್ದು' ಎನ್ನುವ ಅಭಿಮಾನವಿದ್ದಾಗ ಮಾತ್ರ. ಭಗವಂತನಿಗೆ ಕರ್ಮದ ಅಂಟು

ಅಥವಾ ನಂಟು ಇಲ್ಲ. ಕರ್ಮಫಲದ ಅಭಿಮಾನವಿಲ್ಲ. ಆತನಿಗೆ ಕರ್ಮದ ಪರಿಶ್ರಮ, ಆಯಾಸಪೂರ್ವಕ ಕರ್ತೃತ್ವ, ಫಲದ ಬಯಕೆ ಇಲ್ಲ. ಈ ಸತ್ಯವನ್ನು ಅರಿತವ, ಅರಿತು ಅದನ್ನು ತನ್ನ ಜೀವನದಲ್ಲಿ ಅಳವಡಿಸಿಕೊಂಡವ, ಕರ್ಮ ಬಂಧನದಲ್ಲಿ ಸಿಕ್ಕಿಬೀಳನು.

ಏವಂ ಜ್ಞಾತ್ವಾ ಕೃತಂ ಕರ್ಮ ಪೂರ್ವೈರಪಿ ಮುಮುಕ್ಷುಭಿಃ ।
ಕುರು ಕರ್ಮೈವ ತಸ್ಮಾತ್ ತ್ವಂ ಪೂರ್ವೈಃ ಪೂರ್ವತರಂ ಕೃತಮ್ ॥೧೫॥

ಏವಮ್ ಜ್ಞಾತ್ವಾ ಕೃತಮ್ ಕರ್ಮ ಪೂರ್ವೈಃ ಅಪಿ ಮುಮುಕ್ಷುಭಿಃ
ಕುರು ಕರ್ಮ ಏವ ತಸ್ಮಾತ್ ತ್ವಮ್ ಪೂರ್ವೈಃ ಪೂರ್ವ ತರಮ್ ಕೃತಮ್-ಬಿಡುಗಡೆ ಬಯಸಿದ ಹಿಂದಿನವರು ಕೂಡಾ ಹೀಗೆ 'ತಿಳಿದು' ಕರ್ಮ ಮಾಡಿದರು. ಆದ್ದರಿಂದ ಹಿಂದಿನಿಂದಲೂ ಇದ್ದು ಹಿರಿಯರು ಮಾಡಿಕೊಂಡು ಬಂದ ಕರ್ಮವನ್ನೇ ನೀನು ಮಾಡು .

ಕರ್ಮದ ಬಂಧನದಿಂದ ಬಿಡಿಸಿಕೊಳ್ಳಲು 'ನಿಷ್ಕ್ರೀಯತೆ' ಸುಲಭೋಪಾಯ ಎಂದು ಕೆಲವರು ಯೋಚಿಸಬಹುದು. ಕೃಷ್ಣ ನಿಷ್ಕ್ರೀಯತೆಯನ್ನು ಉಗ್ರವಾಗಿ ವಿರೋಧಿಸುತ್ತಾನೆ. 'ನೂರು ವರುಷ ಬದುಕು ಆದರೆ ಕರ್ತವ್ಯಕರ್ಮ ಮಾಡಿಕೊಂಡು ಬದುಕು. ನಿಷ್ಕ್ರೀಯನಾಗಿ ಬದುಕಬೇಡ'. ಇದು ಕೃಷ್ಣನ ಸಿದ್ಧಾಂತ. ಕರ್ಮ ಮಾಡುವುದು ಎಂದರೆ ಏನನ್ನಾದರೂ ಮಾಡುವುದಲ್ಲ. ನಮ್ಮ ಜೀವಸ್ವಭಾವ(ವರ್ಣ)ಕ್ಕೆ ತಕ್ಕಂತೆ ಕರ್ಮ ನಡೆಯುತ್ತಿರಬೇಕು. ಮಾಡುವ ಕರ್ಮವನ್ನು ಜ್ಞಾನಪೂರ್ವಕವಾಗಿ ತಿಳಿದು ಅಭಿಮಾನ-ಅಹಂಕಾರ-ಫಲಾಪೇಕ್ಷೆ ಇಲ್ಲದೇ ಮಾಡಬೇಕು. "ನಿನ್ನ ಹಿಂದಿನ ರಾಜರ್ಷಿಗಳು, ಋಷಿ-ಮುನಿಗಳು ಮಾಡಿದ್ದೂ ಇದನ್ನೇ . ಕರ್ಮಯೋಗ ಮತ್ತು ಜ್ಞಾನಯೋಗವೆಂಬ ಉಭಯ ಯೋಗವಿಲ್ಲದೇ ಭಗವಂತನ ಸಂಯೋಗವಿಲ್ಲ" ಎನ್ನುತ್ತಾನೆ ಕೃಷ್ಣ.

ಕಿಂ ಕರ್ಮ ಕಿಮಕರ್ಮೇತಿ ಕವಯೋಽಪ್ಯತ್ರ ಮೋಹಿತಾಃ ।
ತತ್ ತೇ ಕರ್ಮ ಪ್ರವಕ್ಷ್ಯಾಮಿ ಯಜ್ ಜ್ಞಾತ್ವಾ ಮೋಕ್ಷ್ಯಸೇಽಶುಭಾತ್ ॥೧೬॥

ಕಿಮ್ ಕರ್ಮ ಕಿಮ್ ಅಕರ್ಮ ಇತಿ ಕವಯಃ ಅಪಿ ಅತ್ರ ಮೋಹಿತಾಃ
ತತ್ ತೇ ಕರ್ಮ ಪ್ರವಕ್ಷ್ಯಾಮಿ ಯತ್ ಜ್ಞಾತ್ವಾ ಮೋಕ್ಷ್ಯಸೇ ಅಶುಭಾತ್-ಯಾವುದು ಕರ್ಮ, ಯಾವುದು ಅಕರ್ಮ ಎಂಬಲ್ಲಿ ಬಲ್ಲವರು ಗಲಿಬಿಲಿಗೊಳ್ಳುತ್ತಾರೆ. ಅಂತಹ ಕರ್ಮವನ್ನು ನಿನಗೆ ತಿಳಿಹೇಳುತ್ತೇನೆ. ಅದನ್ನು ಅರಿತು ನೀನು ಕೇಡಿನಿಂದ ಪಾರಾಗುವೆ.

ಕರ್ಮಣೋ ಹ್ಯಪಿ ಬೋದ್ಧವ್ಯಂ ಬೋದ್ಧವ್ಯಂ ಚ ವಿಕರ್ಮಣಃ ।
ಅಕರ್ಮಣಶ್ಚ ಬೋದ್ಧವ್ಯಂ ಗಹನಾ ಕರ್ಮಣೋ ಗತಿಃ ॥೧೭॥

ಕರ್ಮಣಃ ಹಿ ಅಪಿ ಬೋದ್ಧವ್ಯಮ್ ಬೋದ್ಧವ್ಯಮ್ ಚ ವಿಕರ್ಮಣಃ |
ಅಕರ್ಮಣಃ ಚ ಬೋದ್ಧವ್ಯಮ್ ಗಹನಾ ಕರ್ಮಣಃ ಗತಿಃ -- ಕರ್ಮದ ಬಗ್ಗೆಯೂ ತಿಳಿಯಬೇಕು. ವಿರುದ್ಧ ಕರ್ಮದ ಬಗೆಗೂ ತಿಳಿಯಬೇಕು, ಕರ್ಮ ತ್ಯಾಗದ ಬಗೆಗೂ ತಿಳಿಯಬೇಕು.[ಕರ್ಮವನ್ನು ನಮ್ಮಿಂದ ತಿಳಿಯಬೇಕು. ವಿಕರ್ಮವನ್ನು ನಮ್ಮಿಂದ ತಿಳಿಯಬೇಕು; ಆಕರ್ಮವನ್ನೂ ನಮ್ಮಿಂದ ತಿಳಿಯಬೇಕು.] ಕರ್ಮದ ನಡೆ ನಿಗೂಢವಾದದ್ದು.

ಯಾವುದು ಕರ್ಮ, ಯಾವುದು ಅಕರ್ಮ ಎನ್ನುವುದು ಜ್ಞಾನಿಗಳಿಗೂ ಕೂಡಾ ಗೊಂದಲದ ವಿಷಯ. ನಾವು ಮಾಡುವುದನ್ನು ತಿಳಿದು ಮಾಡಬೇಕು. ನಮ್ಮ ಕರ್ಮ ಜ್ಞಾನಪೂರ್ವಕವಾಗಿರಬೇಕು. ಆದ್ದರಿಂದ ಕರ್ಮ ಎಂದರೆ ಏನು ಎನ್ನುವುದನ್ನು ಮೊದಲು ನಿನಗೆ ಹೇಳುತ್ತೇನೆ. ಇದರಿಂದ ನೀನು ಕೇಡಿನಿಂದ ಪಾರಾಗುವೆ ಎನ್ನುತ್ತಾನೆ. ಕೃಷ್ಣ.
ಕರ್ಮದ ಬಗ್ಗೆ ತಿಳಿಯುವುದು ಅಷ್ಟು ಸುಲಭವಲ್ಲ. ಆದರೆ ಇದನ್ನು ತಿಳಿಯಲೇಬೇಕು. ಕರ್ಮದ ನಡೆ ಅತ್ಯಂತ ರಹಸ್ಯವಾದದ್ದು. ಯಾವುದು ಕರ್ಮ ಯಾವುದು ಅಕರ್ಮ ಎಂದು ತಿಳಿಯುವುದು ಬಹಳ ಕಷ್ಟ. ದೊಡ್ಡದೊಡ್ಡ ಜ್ಞಾನಿಗಳಿಗೂ ಇದು ತಿಳಿಯುವುದಿಲ್ಲ. ಇತಿಹಾಸದಲ್ಲಿನ ಕೆಲವು ವಿಷಯವನ್ನು ನೋಡಿದರೆ ನಮಗೆ ಗೊಂದಲವಾಗುತ್ತದೆ. ಉದಾಹರಣೆಗೆ ವೇದವ್ಯಾಸರು. ಇವರು ಮದುವೆ ಆಗದ ಒಬ್ಬ ಬೆಸ್ತರ ಹುಡುಗಿಯಿಂದ ಹುಟ್ಟಿದ ಕನ್ಯಾಪುತ್ರ(ಕಾನೀನ); ವೇದವ್ಯಾಸರ ಮಕ್ಕಳು ಪಾಂಡು ಮತ್ತು ಧೃತರಾಷ್ಟ್ರ ವಿಧವೆಯರಿಗೆ ಹುಟ್ಟಿದ ಮಕ್ಕಳು; ಪಾಂಡವರು-ಗಂಡ ಇರುವಾಗ ಪರಪುರುಷರಿಗೆ ಹುಟ್ಟಿದವರು! ಯಾವುದು ಧರ್ಮ? ಪಾಂಡವರನ್ನು ಸಮರ್ಥಿಸುವುದು ಎಷ್ಟು ಸರಿ? ವೇದವ್ಯಾಸರನ್ನು ಮಹಾಜ್ಞಾನಿ ಬ್ರಾಹ್ಮಣ ಎಂದು ಒಪ್ಪುವುದು ಸಾಧ್ಯವೇ? ಈ ಉದಾಹರಣೆಯನ್ನು ನೋಡಿದಾಗ ಯಾವುದು ಧರ್ಮ, ಯಾವುದು ಅಧರ್ಮ, ಯಾವುದು ಸರಿ, ಯಾವುದು ತಪ್ಪು, ಎನ್ನುವಲ್ಲಿ ನಮಗೆ ಗೊಂದಲವಾಗುತ್ತದೆ.
ನಮ್ಮಲ್ಲಿ ನೆಡೆಯತಕ್ಕ ಕರ್ಮ, ಅಕರ್ಮ, ವಿಕರ್ಮದ ಹಿಂದೆ ಅನಂತವಾದ ಭಗವದ್ ಶಕ್ತಿ ಕೆಲಸ ಮಾಡುತ್ತಿರುತ್ತದೆ ಎನ್ನುವ ಎಚ್ಚರ ನಮಗಿರಬೇಕು. ಈ ಜ್ಞಾನವಿಲ್ಲದೆ ಕರ್ಮದ ಮರ್ಮವನ್ನು ಅರಿಯಲು ಸಾಧ್ಯವಿಲ್ಲ. ಒಂದು ದೇಹದಲ್ಲಿ ಭಗವಂತ ಅನೇಕ ರೂಪದಲ್ಲಿದ್ದು(ವಿಕರ್ಮಣಃ) ಕರ್ಮ ಮಾಡಿಸುತ್ತಾನೆ. ಕರ್ಮ ಎನ್ನುವುದು ತುಂಬಾ ಕ್ಲಿಷ್ಟವಾದ ವಿಷಯ. ಅದನ್ನು ನಾವು ಭಗವಂತನಿಂದಲೇ ತಿಳಿಯಬೇಕು. ಮುಂದಿನ ಶ್ಲೋಕಗಳಲ್ಲಿ ಕೃಷ್ಣ ಕರ್ಮದ ಮರ್ಮವನ್ನು ವಿವರಿಸುತ್ತಾನೆ.

ಕರ್ಮಣ್ಯಕರ್ಮ ಯಃ ಪಶ್ಯೇದಕರ್ಮಣಿ ಚ ಕರ್ಮ ಯಃ ।
ಸ ಬುದ್ಧಿಮಾನ್ ಮನುಷ್ಯೇಷು ಸ ಯುಕ್ತಃ ಕೃತ್ಸ್ನಕರ್ಮಕೃತ್ ॥೧೮॥

ಕರ್ಮಣಿ ಅಕರ್ಮ ಯಃ ಪಶ್ಯೇತ್ ಅಕರ್ಮಣಿ ಚ ಕರ್ಮ ಯಃ |
ಸಃ ಬುದ್ಧಿಮಾನ್ ಮನುಷ್ಯೇಷು ಸಃ ಯುಕ್ತಃ ಕೃತ್ಸ್ನಕರ್ಮ ಕೃತ್ -- ವಿಶ್ವದ ಕ್ರಿಯೆ ನಡೆಯುತ್ತಿರುವಾಗಲೂ ತನ್ನಿಂದ ಏನೂ ನಡೆದಿಲ್ಲ ಎಂದು ತಿಳಿದವನು, ತಾನು ಏನೂ ಮಾಡದಿದ್ದಾಗಲೂ ವಿಶ್ವದ ಕ್ರಿಯೆ ನಡೆಯುತ್ತಿದೆ

ಎಂದು ತಿಳಿದವನು,[ಕರ್ಮ ಬದ್ಧನಾದ ಜೀವನಲ್ಲಿ ಕರ್ಮ ಇಲ್ಲ ಎಂದು ತಿಳಿದವನು, ಕರ್ಮಾತೀತನಾದ ಭಗವಂತನಲ್ಲಿ ಎಲ್ಲಾ ಕರ್ಮಗಳನ್ನು ಕಾಣುವವನು] ಮನುಷ್ಯರಲ್ಲಿ ನಿಜವಾಗಿ ತಿಳಿದವನು. ಅವನೇ ಸಾಧನೆಯ ದಾರಿ ಬಲ್ಲವನು; ಎಲ್ಲಾ ಕರ್ಮಗಳ ಫಲವನ್ನು ಪಡೆದವನು.

ಕರ್ಮ ಅಂದರೆ ಏನು ಎನ್ನುವ ಬಗ್ಗೆ ಅತ್ಯಂತ ರೋಚಕವಾದ ವಿಚಾರವನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ಈ ಹಿಂದೆ ಹೇಳಿದಂತೆ ಸಂಸ್ಕೃತ ರಹಸ್ಯಾರ್ಥವುಳ್ಳ ಭಾಷೆ(mystic language). ಅದಕ್ಕಾಗಿ ಭಗವದ್ಗೀತೆಯನ್ನು ಓದಿದಾಕ್ಷಣ, ಅಧ್ಯಾತ್ಮದ ಅನುಭವ ಇಲ್ಲದೆ ಏನೂ ತಿಳಿಯದು. ಅಧ್ಯಾತ್ಮದ ಅನುಭವದ ಸ್ಥರದಲ್ಲಿ ನಾವು ಎಷ್ಟು ಆಳಕ್ಕೆ ಇಳಿಯುತ್ತೇವೋ ಅಷ್ಟು ಆಳಕ್ಕೆ ಗೀತೆ ತೆರೆದುಕೊಳ್ಳುತ್ತದೆ. ಇದಕ್ಕೆ ಈ ಶ್ಲೋಕವೇ ಉದಾಹರಣೆ. ಮೇಲ್ನೋಟಕ್ಕೆ ಒಗಟಿನಂತೆ ವಿರೋಧಾಭಾಸವಾಗಿರುವ ಹುಚ್ಚು ಹೇಳಿಕೆಯಂತಿದೆ ಈ ಶ್ಲೋಕ! ಇಲ್ಲಿ ಹೀಗೆ ಹೇಳಲಾಗಿದೆ: "ಕರ್ಮ ಇದ್ದಲ್ಲಿ ಕರ್ಮ ಇಲ್ಲ, ಕರ್ಮ ಎಲ್ಲಿ ಇಲ್ಲ ಅಲ್ಲಿ ಕರ್ಮ ಇದೆ. ಇದು ಯಾರಿಗೆ ತಿಳಿದಿದೆಯೋ ಆತ ಬುದ್ಧಿವಂತ" ಅಥವಾ "ಯಾವುದು ಕರ್ಮವೋ ಅದು ಕರ್ಮವಲ್ಲ, ಯಾವುದು ಕರ್ಮವಲ್ಲವೋ ಅದು ಕರ್ಮ; ಇದನ್ನು ತಿಳಿದವ ಬುದ್ಧಿವಂತ"!! ಇಲ್ಲಿರುವ ಗೂಡಾರ್ಥವನ್ನು ತಿಳಿದುಕೊಳ್ಳಬೇಕಾದರೆ ಅಧ್ಯಯನದ ಜೊತೆಗೆ ಅಧ್ಯಾತ್ಮದ ಅನುಭಾವ ಬೇಕು.

'ಎಲ್ಲಿ ಕರ್ಮವಿದೆಯೋ ಅಲ್ಲಿ ಕರ್ಮವಿಲ್ಲ'. ನಾವು ನಮ್ಮಲ್ಲಿ ಕರ್ಮವಿದೆ ಎಂದು ತಿಳಿದುಕೊಳ್ಳುತ್ತೇವೆ. 'ನನ್ನಲ್ಲಿ ಕರ್ಮದ ಸ್ವಾತಂತ್ರ್ಯವಿದೆ-ನನಗೆ ಯಾರ ಹಂಗೂ ಇಲ್ಲ' ಎನ್ನುವ ಭಾವನೆ ನಮ್ಮದು. ಆದರೆ ನಮ್ಮಲ್ಲಿರುವ ಕರ್ಮ ಭಗವಂತನ ಅಧೀನ. ಈ ಸೃಷ್ಟಿ ಚಕ್ರದಲ್ಲಿ ನಾವು ಏನೂ ಮಾಡದಿದ್ದಾಗಲೂ ಸಹ ಕ್ರಿಯೆ ನಿರಂತರವಾಗಿ ನಡೆಯುತ್ತಿರುತ್ತದೆ. ನೀನು ಏನನ್ನಾದರೂ ಮಾಡುತ್ತಿದ್ದರೆ ನಿನ್ನಿಂದಾಗಿಯೇ ಕ್ರಿಯೆ ನಡೆದದ್ದಲ್ಲ. ನನ್ನಲ್ಲಿ ಕ್ರಿಯೆ ಇದೆ ಎನ್ನುವ ಭ್ರಮೆಯನ್ನು ಬಿಟ್ಟುಬಿಡು. ಪ್ರಕೃತಿ ನಿರಂತರವಾಗಿ ತನ್ನ ಕರ್ತವ್ಯವನ್ನು ಮಾಡುತ್ತಿರುತ್ತದೆ. ವಿಶ್ವಕ್ರಿಯೆ ನಾವು ನಿಷ್ಕ್ರೀಯರಾಗಿದ್ದರೂ ನಡೆಯುತ್ತದೆ. ನಾವು ಎಲ್ಲಾ ಮಾಡಿದರೂ ಏನೂ ನಡೆಯುವುದಿಲ್ಲ. ಈ ವಿಶ್ವಚಕ್ರ ನಿರಂತರ.

ಇದನ್ನು ಅರ್ಥ ಮಾಡಿಕೊಳ್ಳಲು ಒಂದು ಲೌಕಿಕ ದೃಷ್ಟಾಂತವನ್ನು ನೋಡೋಣ. ಒಂದು ಆನೆ(ಈ ವಿಶ್ವ ಚಕ್ರ) ಅದರ ತಲೆಯ ಮೇಲೆ ಒಂದು ಪುಟ್ಟ ಇರುವೆ(ಸಾಮಾನ್ಯ ಮಾನವ). ಆನೆ ಪೂರ್ವದಿಂದ ಪಶ್ಚಿಮಕ್ಕೆ ಹೋಗುತ್ತಿದೆ. ಇರುವೆ ನಿರಂತರ ತಲೆಯಿಂದ ಬಾಲದತ್ತ ಅಂದರೆ ಪಶ್ಚಿಮದಿಂದ ಪೂರ್ವಕ್ಕೆ ಹೋಗುತ್ತಿದೆ. ಆದರೆ ಆನೆಯ ಮೇಲೆ ಇರುವ ಈ ಇರುವೆ ಯಾವ ದಿಕ್ಕಿನಲ್ಲಿ ಚಲಿಸಿದರೂ, ಅದು ಆನೆ ಎಲ್ಲಿಗೆ ಸೇರುತ್ತದೋ ಅಲ್ಲಿಗೇ ಸೇರುವುದು. ಇಲ್ಲಿ ಇರುವೆಯ ಚಲನೆ ವ್ಯರ್ಥ-ಅದರಿಂದ ಏನೂ ಉಪಯೋಗವಿಲ್ಲ. ಒಂದು ವೇಳೆ ಈ ಇರುವೆ ನನ್ನಿಂದಾಗಿ ಆನೆ ಅಲ್ಲಿಂದ ಇಲ್ಲಿಗೆ ಬಂದು ತಲುಪಿತು ಎಂದು ತಿಳಿದರೆ? ಎಷ್ಟು ಹಾಸ್ಯಾಸ್ಪದವಲ್ಲವೇ? ಹಾಗೇ, ನಮ್ಮ ಚಲನೆಯ ಹಿಂದೆ ಒಂದು ಮಹಾನ್ ಚಾಲನಾ ಶಕ್ತಿ ಇದೆ. ಇಡೀ ಬ್ರಹ್ಮಾಂಡವನ್ನು(Cosmos) ತೆಗೆದುಕೊಂಡರೆ, ಈ ಭೂಮಿ ಇತರ ಗ್ರಹಗೋಲಗಳ ನಡುವಿನ ಒಂದು ಚಿಕ್ಕ ಬಿಂದು. ಆ ಬಿಂದುವಿನಲ್ಲಿ ನಮ್ಮ ದೇಶ ಇನ್ನೂ ಒಂದು ಚಿಕ್ಕ ಬಿಂದು. ಅದರಲ್ಲಿ 'ನಾನು' ಎನ್ನುವುದು ಊಹಿಸಲೂ ಅಸಾಧ್ಯವಾದ ಬಿಂದು(very tiny and insignificant). ಆದರೆ ನಾವು ಮಾತ್ರ ಈ ಬ್ರಹ್ಮಾಂಡವೇ ನಮ್ಮಿಂದ ನಡೆಯುತ್ತಿದೆ ಎನ್ನುವಂತೆ ಅಹಂಕಾರ ಪಡುತ್ತೇವೆ. ಇಡೀ ವಿಶ್ವದ ಚಲನೆಯೊಂದಿಗೆ ನಾವು ಒಂದು ಘಟಕವಾಗಿದ್ದೇವೆಯೇ ಹೊರತು, ನಮ್ಮ ಸ್ವಂತದಿಂದ ಏನೂ

ಆಗುತ್ತಿಲ್ಲ. ಆದ್ದರಿಂದ 'ನಿನ್ನ ಕರ್ಮದಲ್ಲಿ ಅಕರ್ಮವನ್ನು ನೋಡು' ಎನ್ನುತ್ತಾನೆ ಕೃಷ್ಣ. ಹೀಗೆ ತನ್ನ ಕರ್ಮವನ್ನು ನಿಯಂತ್ರಿಸುವ ವಿಶ್ವಶಕ್ತಿಯಾಗಿ ಭಗವಂತನಿದ್ದಾನೆ ಎಂದು ತಿಳಿದವ ವಿವೇಕಿ'.

'ಯುಕ್ತಃ' ಅಂದರೆ ಮನಸ್ಸನ್ನು ಸತ್ಯದ ಕಡೆಗೆ ತಿರುಗಿಸಿ, ಸತ್ಯವನ್ನು ತಿಳಿಯುವುದಕ್ಕೋಸ್ಕರ ಮನನ ಮಾಡಿದವ ಎಂದರ್ಥ. ಹೀಗೆ ಸರಿ ತಪ್ಪು ತಿಳಿದವ ಎಲ್ಲಾ ಕರ್ಮದ ಪೂರ್ಣ ಫಲವನ್ನು ಪಡೆಯುತ್ತಾನೆ. ಇಂತವನಿಗೆ ಕರ್ತೃತ್ವ ಇದ್ದರೂ ಅದರ ಅಭಿಮಾನವಿಲ್ಲ; ನಾನು ಮಾಡಿದೆ ನನ್ನಿಂದಾಯಿತು ಅನ್ನುವ ಅಹಂಕಾರವಿಲ್ಲ; ನಾನು ಸ್ವತಂತ್ರ ಅನ್ನುವ ಭ್ರಮೆ ಇಲ್ಲ. ಆದ್ದರಿಂದ ಅವನು ಮಾಡುವ ಎಲ್ಲಾ ಕರ್ಮವೂ ಫಲಪ್ರದ. ಭಗವಂತನ ಪಾರಮ್ಯದ ಎಚ್ಚರದಿಂದ ಅವನ ಜೀವನ ರೂಪುಗೊಂಡಿದೆ. ಅಂತವನು ಸಣ್ಣ ಕರ್ಮ ಮಾಡಿದರೂ ಮಹಾಫಲವನ್ನು ಪಡೆಯುತ್ತಾನೆ. ಅಹಂಕಾರದಿಂದ ಕಳಚಿಕೊಳ್ಳುವುದು ಅಧ್ಯಾತ್ಮದಲ್ಲಿ ಅತ್ಯಂತ ಮಹತ್ವದ ವಿಷಯ. ಕೃಷ್ಣ ಗೀತೆಯಲ್ಲಿ ಈ ಮಾತನ್ನು ಪದೇ ಪದೇ ಹೇಳುತ್ತಾನೆ. ಅಹಂಕಾರ ಎನ್ನುವುದು ಎಷ್ಟು ಅಪಾಯಕಾರಿ ಎಂದರೆ, ಗೀತೆ ಓದಿದ ಮೇಲೆ 'ನಾನು ಗೀತೆಯನ್ನು ಓದಿದ್ದೇನೆ' ಎನ್ನುವ ಅಹಂಕಾರ ಬಂದು ಬಿಡುತ್ತದೆ! ಆದ್ದರಿಂದ ಜ್ಞಾನ ಸಂಪಾದನೆ ಜೊತೆಗೆ ಒಂದು ಎಚ್ಚರ ಸದಾ ಇರಬೇಕು. ಯಾವ ಕಾಲಕ್ಕೂ ಅಹಂಕಾರಕ್ಕೆ ಒಳಗಾಗಬಾರದು. ಅಹಂಕಾರ ಎನ್ನುವುದು ಅಧ್ಯಾತ್ಮದ ದಾರಿ ಅಲ್ಲ.

ಭಗವಂತ ಕರ್ಮ ಮಾಡಿದರೂ ಅವನಿಗೆ ಕರ್ಮದ ಲೇಪವಿಲ್ಲ. ಯಾವದೇ ಕರ್ಮಲೇಪವಿಲ್ಲದ ಭಗವಂತನಲ್ಲಿ ಎಲ್ಲಾ ಕರ್ಮವಿದೆ. ಕರ್ಮ ಇದ್ದಲ್ಲಿ ಕರ್ಮದ ಲೇಪವಿಲ್ಲವೋ. ಯಾರಲ್ಲಿ ಕರ್ಮದ ಲೇಪವಿಲ್ಲ ಆತ ಮಾತ್ರ ಪೂರ್ಣ ಫಲವನ್ನು ಪಡೆಯುತ್ತಾನೆ. ಕರ್ಮದ ಲೇಪದಲ್ಲಿ ಬಿದ್ದವನು 'ನಾನು ಮಾಡಿದೆ, ನನ್ನಿಂದಾಯಿತು' ಎಂದುಕೊಂಡು ಸೆರೆಯಲ್ಲಿ ಸಿಕ್ಕಿ ಒದ್ದಾಡುತ್ತಾನೆ. ಇದು ಕೃಷ್ಣನ ಕರ್ಮದ ವಿವರಣೆ(definition). ಭಗವಂತನಲ್ಲಿ ಕರ್ಮದ ಲೇಪವಿಲ್ಲ, ಆದರೆ ಸರ್ವ ಕರ್ತೃತ್ವವಿದೆ. ನಾವು ಎಷ್ಟು ಕರ್ಮದ ಲೇಪವನ್ನು ಕಮ್ಮಿ ಮಾಡಿಕೊಂಡೆವೋ ಅಷ್ಟು ಕರ್ಮದ ಫಲವನ್ನು ಪಡೆಯುತ್ತೇವೆ. ಇದನ್ನು ತಿಳಿದವ ಬುದ್ಧಿವಂತ. ಆತ ಕರ್ಮದ ನಿಜವಾದ ಅನುಸಂಧಾನದಿಂದ ಅದರ ಪೂರ್ಣ ಫಲವನ್ನು ಪಡೆಯುತ್ತಾನೆ. ಇದನ್ನು ಇನ್ನೂ ಬಿಡಿಸಿ ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರಿಸುತ್ತಾನೆ.

ಯಸ್ಯ ಸರ್ವೇ ಸಮಾರಂಭಾಃ ಕಾಮಸಂಕಲ್ಪವರ್ಜಿತಾಃ ।
ಜ್ಞಾನಾಗ್ನಿದಗ್ಧಕರ್ಮಾಣಂ ತಮಾಹುಃ ಪಂಡಿತಂ ಬುಧಾಃ ॥೧೯॥

ಯಸ್ಯ ಸರ್ವೇ ಸಮಾರಂಭಾಃ ಕಾಮ ಸಂಕಲ್ಪವರ್ಜಿತಾಃ

ಜ್ಞಾನ ಅಗ್ನಿ ದಗ್ಧ ಕರ್ಮಾಣಮ್ ತಮ್ ಆಹುಃ ಪಂಡಿತಮ್ ಬುಧಾಃ -- ಮಾಡುವ ಬಯಕೆ, ಪಡೆಯುವ ಬಯಕೆಗಳನ್ನು ತೊರೆದು ಎಲ್ಲಾ ಕರ್ಮಗಳಲ್ಲೂ ತೊಡಗುವವನು ಅರಿವಿನ ಬೆಂಕಿಯಿಂದ ಕರ್ಮಗಳನ್ನು ಸುಟ್ಟವನು. ಬಲ್ಲವರು ಅಂಥವನನ್ನು ಪಂಡಿತ ಎನ್ನುತ್ತಾರೆ.

ನಮ್ಮ ಜೀವನದ ತೊಡಗುವಿಕೆಯ ಹಿಂದೆ ಒಂದು ಕಾಮನೆ,ಸಂಕಲ್ಪ ಇರುತ್ತದೆ. ನಾನು ಸುಖ ಪಡಬೇಕು, ನನ್ನ ಮನೆಮಂದಿಯನ್ನು ಸುಖವಾಗಿಡಬೇಕು ಎನ್ನುವ ಕಾಮನೆ. ಇದಕ್ಕಾಗಿ ಇನ್ನ್ಯಾವುದೋ ವಿಧಾನವನ್ನು

ಅನುಸರಿಸುತ್ತೇವೆ. ಇದು ಪ್ರತಿಯೊಂದು ಕ್ರಿಯೆಯ ಹಿಂದೆ ಮನುಷ್ಯನನ್ನು ಕಾಡುವ ಸಮಸ್ಯೆ. ತನ್ನ ಬಯಕೆಯ ಈಡೇರಿಕೆಗಾಗಿ ನಮ್ಮನ್ನು ನಾವು ತೊಡಗಿಸಿಕೊಳ್ಳುತ್ತೇವೆ. ಯಾರಿಗೆ ತನ್ನ ತೊಡಗುವಿಕೆಯಲ್ಲಿ ಬಯಕೆಗಳ ಸ್ಪರ್ಶ ಇಲ್ಲವೋ ಅವನು ಪಂಡಿತ. ಒಬ್ಬ ಪಂಡಿತನ ಪಾಂಡಿತ್ಯವನ್ನು ಅವನ ನುಡಿಯಲ್ಲಿ ಅಲ್ಲ, ನಡೆಯಲ್ಲಿ ಕಾಣಬೇಕು.
ನಿನ್ನ ಜೀವನದಲ್ಲಿ ಹೀಗೇ ಆಗಬೇಕು, ಹೀಗೇ ಮಾಡಬೇಕು, ಅದರಿಂದ ಇಂತಹದ್ದೇ ಸಿಗಬೇಕು ಅನ್ನುವ ಬಯಕೆ, ಆಸೆಗಳನ್ನು ಬಿಟ್ಟು  ನಿರಾಳವಾಗಿ ಕರ್ತವ್ಯ ಮಾಡು. ಭಗವಂತ ಏನು ಕೊಡುತ್ತಾನೆ ಅದನ್ನು ಪ್ರಸಾದವಾಗಿ ಸ್ವೀಕರಿಸು. ಏನು ಬಂತೋ ಅದರಲ್ಲಿ ತೃಪ್ತಿಪಡುವುದನ್ನು ಕಲಿ. ಇಲ್ಲವಲ್ಲಾ ಎಂದು ಸಂಕಟ ಪಡಬೇಡ. ಇದು 'ಕಾಮಸಂಕಲ್ಪವರ್ಜ್ಯ'. [ಏನೂ ಬೇಡ ಎಂದು ಬಯಸುವುದಲ್ಲ, ಇಂತದ್ದೇ ಬೇಕು ಎಂದು ಬಯಸದೇ ಇರುವುದು ಕಾಮಸಂಕಲ್ಪವರ್ಜ್ಯ]. ಏನು ಬಂತೋ ಬರಲಿ, ನೀನು ಪ್ರಯತ್ನಶೀಲನಾಗು. ಬಂದದ್ದರಲ್ಲಿ ಸಂತೋಷದಿಂದ ಬದುಕು. ಇಂತಹ ಅರಿವಿನಿಂದ ಮಾಡಿದ ಕರ್ಮ ಸ್ವಚ್ಛವಾಗಿರುತ್ತದೆ. ಇದು ಕರ್ಮದ ಕೊಳೆ ಅರಿವಿನ ಬೆಂಕಿಯಿಂದ ಸ್ವಚ್ಛವಾಗುವಿಕೆ. ಇಂತಹ ನಡೆ ಉಳ್ಳವನು ಪಂಡಿತ ಎನಿಸುತ್ತಾನೆ. ಇಂತವರನ್ನು ಜ್ಞಾನಿಗಳು 'ಜ್ಞಾನಿಗಳೆಂದು' ಗುರುತಿಸುತ್ತಾರೆ. ಮನುಷ್ಯ ಏನನ್ನು  ಹೇಳುತ್ತಾನೆ ಅದು ಮುಖ್ಯವಲ್ಲ, ಏನನ್ನು ರೂಢಿಸಿಕೊಳ್ಳುತ್ತಾನೆ ಅದು ಮುಖ್ಯ. ಮನಸ್ಸಿನ ತುಂಬಾ ಆಸೆಗಳನ್ನು ತುಂಬಿಕೊಂಡು ಯಾವುದ್ಯಾವುದೋ ಆಸೆಯ ಬೆನ್ನುಹತ್ತಿ ಸೋಗು ಹಾಕಿಕೊಂಡು ಬದುಕುವವನು ಎಂದೂ ಎತ್ತರಕ್ಕೇರಲಾರ.

ತ್ಯಕ್ತ್ವಾ ಕರ್ಮಫಲಾಸಂಗಂ ನಿತ್ಯತೃಪ್ತೋ[ಽ]ನಿರಾಶ್ರಯಃ ।
ಕರ್ಮಣ್ಯಭಿಪ್ರವೃತ್ತೋಽಪಿ ನೈವ ಕಿಂಚಿತ್ ಕರೋತಿ ಸಃ ॥೨೦॥

ತ್ಯಕ್ತ್ವಾ ಕರ್ಮ ಫಲ ಅಸಂಗಮ್ ನಿತ್ಯ ತೃಪ್ತಃ [ಅ]ನಿರಾಶ್ರಯಃ
ಕರ್ಮಣಿ ಅಭಿಪ್ರವೃತ್ತಃ ಅಪಿ ನ ಏವ ಕಿಂಚಿತ್ ಕರೋತಿ ಸಃ -- ಕರ್ಮಫಲದಲ್ಲಿ ನೇಹವನ್ನು ತೊರೆದು, ತಾನು ಎಂದೂ ಇತರ ಬಯಕೆ ಇಲ್ಲದ, ಯಾರಿಗೂ ತಲೆಬಾಗದ ಭಗವಂತನ ಪಡಿಯಚ್ಚು ಎಂದು ತಿಳಿದವನು[ಭಗವಂತನ ಆಸರೆಯಲ್ಲಿದ್ದು ಸದಾ ನೆಮ್ಮದಿಯಿಂದಿರುವವನು] ಕರ್ಮದಲ್ಲಿ ತೊಡಗಿದರೂ ವಾಸ್ತವವಾಗಿ ಏನನ್ನೂ ಮಾಡುವುದಿಲ್ಲ.

ಕೆಲವರಿಗೆ ಅದು ಬೇಕು, ಇದು ಬೇಕು ಎನ್ನುವ ಆಸೆ ಇರುವುದಿಲ್ಲ. ಆದರೆ ಬಂದಾಗ ಖುಷಿಯಾಗುತ್ತದೆ. ಕರ್ಮ ಫಲದಲ್ಲಿ ಅತಿಯಾದ ಸ್ನೇಹ ಒಳ್ಳೆಯದಲ್ಲ. ಭಗವಂತ ಪ್ರೇರಣೆ ಮಾಡಿದ ಬಂತು. ಅದನ್ನು ಸದ್ವಿನಿಯೋಗ ಮಾಡುವುದು ಹೇಗೆ ಎನ್ನುವುದನ್ನು ಯೋಚಿಸು; ಉಬ್ಬಬೇಡ. ಬರಬೇಕು ಎಂದು ನಿರೀಕ್ಷಿಸಬೇಡ, ನಿರೀಕ್ಷಿಸದೇ ಬಂದಾಗ ಹಾರಾಡಬೇಡ. ಫಲದ ಬಗ್ಗೆ ಅತಿಯಾದ ಮಮತೆ ಒಳ್ಳೆಯದಲ್ಲ. ಇದೊಂದೇ ಮನುಷ್ಯ ಹಾಯಾಗಿ ನೆಮ್ಮದಿಯಿಂದ ಬದುಕಲು ಇರುವ ವಿಧಾನ. ಇದು ಇಲ್ಲದಿದ್ದರೆ ಹತಾಶೆ (Disappointment) ಕಟ್ಟಿಟ್ಟ ಬುತ್ತಿ!
ಮನುಷ್ಯ ಹೀಗಾಗಬೇಕು-ಹಾಗಾಗಬೇಕು ಎಂದು ಕನಸುಗಳ ಸರಮಾಲೆಯನ್ನು ಕಟ್ಟುತ್ತಾ ಹೋಗುತ್ತಾನೆ. ಬಯಸಿದ್ದರಲ್ಲಿ ಎಲ್ಲವೂ ಕೈಗೂಡುವುದಿಲ್ಲ. ಆಗ ಹತಾಶೆ, ದುಗುಡ, ಉದ್ವೇಗ(Tension). ಅದರಿಂದ ಮಾನಸಿಕ ವ್ಯಾಕುಲತೆ (Depression). ಇನ್ನು ಅಕಾಲದಲ್ಲಿ ಸಂಪತ್ತು ಬಂದಾಗ ಹಾರಾಟ-ಅದರಿಂದ ಜೀವನ ನಾಶ! ಈ

ಕಾರಣದಿಂದ ಬಂತು ಎಂದಾಗಲೀ, ಬರಲಿಲ್ಲ ಎಂದಾಗಲೀ, ಬರಬೇಕು ಎಂದಾಗಲೀ ತಲೆ ಕೆಡಿಸಿಕೊಳ್ಳಬೇಡ. ಸ್ವಚ್ಛವಾದ ಯೋಚನೆಯಿಂದ ಕರ್ತವ್ಯದಲ್ಲಿ ತೊಡಗು. ಎಂತಹ ಪರಿಸ್ಥಿತಿಯಲ್ಲೂ ಸಂಯಮ ಇರಲಿ. ಈ ರೀತಿ ನಿನ್ನ ಮನಸ್ಸನ್ನು ತರಬೇತಿಗೊಳಿಸು ಎಂದಿದ್ದಾನೆ ಕೃಷ್ಣ. ಇದು ಕೃಷ್ಣನ ಮನಃಶಾಸ್ತ್ರ.

ಜೀವ ಭಗವಂತನ ಪ್ರತಿಬಿಂಬ. ಅದಕ್ಕೆ ಸ್ವಾತಂತ್ರ್ಯವಿಲ್ಲ. ಬಿಂಬ ಮಾಡಿಸಿದಂತೆ ಪ್ರತಿಬಿಂಬ. ಭಗವಂತ ನಿತ್ಯ ತೃಪ್ತ, ಆತನಿಗೆ ಅತೃಪ್ತಿ ಇಲ್ಲ. ಹಾಗೇ ನಾವೂ ಕೂಡಾ ಅತೃಪ್ತಿ ಇಲ್ಲದೆ ಬದುಕುವುದನ್ನು ಕಲಿತುಕೊಳ್ಳಬೇಕು. ಯಾವುದೋ ಒಂದು ಆಸೆ ಈಡೇರಿಸಿಕೊಳ್ಳುವುದಕ್ಕಾಗಿ ಎಷ್ಟೋ ಜನರ ಹಿಂದೆ ಬಾಲ ಅಲ್ಲಾಡಿಸಿಕೊಂಡು ಸ್ವಾರ್ಥ ಮನಸ್ಸಿನಿಂದ ಬದುಕುವುದು ಜೀವನವಲ್ಲ. ಯಾರ ಆಶ್ರಯವೂ ಇಲ್ಲದಿರುವ ಭಗವಂತನ ಪ್ರತಿಬಿಂಬವಾದ ನಿನಗೆ ಅತೃಪ್ತಿಯ ಬದುಕೇಕೆ? ಭಗವಂತನಂತೆ ನಿರಾಶ್ರಯನಾಗು. ನಿನಗೆ ಸದಾ ಭಗವಂತನ ಆಶ್ರಯವಿದೆ ಎನ್ನುವ ಸತ್ಯವನ್ನು ಅರಿತು ಬಾಳು. ಹೀಗೆ ಬದುಕುವ ಮಾನವ ಕರ್ಮದಲ್ಲಿ ತೊಡಗಿದ್ದರೂ ಕೂಡಾ ಏನನ್ನೂ ಮಾಡುವುದಿಲ್ಲ. ಏಕೆಂದರೆ ಭಗವಂತ ಎಲ್ಲವುದಕ್ಕಿಂತ ಮೇಲಿದ್ದಾನೆ ಎನ್ನುವ ಮರ್ಮವನ್ನು ಆತ ಅರಿತಿರುತ್ತಾನೆ. ಇದಕ್ಕೆ ಇನ್ನೂ ಹೆಚ್ಚಿನ ವಿವರಣೆಯನ್ನು ಮುಂದಿನ ಶ್ಲೋಕಗಳಲ್ಲಿ ಕಾಣಬಹುದು.

ನಿರಾಶೀರ್ಯತಚಿತ್ತಾತ್ಮಾತ್ಯಕ್ತಸರ್ವಪರಿಗ್ರಹಃ ।
ಶಾರೀರಂ ಕೇವಲಂ ಕರ್ಮ ಕುರ್ವನ್ ನಾಽಪ್ನೋತಿ ಕಿಲ್ಬಿಷಮ್ ॥೨೧॥

ನಿರಾಶೀಃ ಯತ ಚಿತ್ತ ಆತ್ಮಾ ತ್ಯಕ್ತ ಸರ್ವ ಪರಿಗ್ರಹಃ ।
ಶಾರೀರಮ್ ಕೇವಲಮ್ ಕರ್ಮ ಕುರ್ವನ್ ನ ಆಪ್ನೋತಿ ಕಿಲ್ಬಿಷಮ್ -- ಮನಸ್ಸು-ಚಿತ್ತಗಳನ್ನು ಹದ್ದಿನಲ್ಲಿರಿಸಿದಾಗ ಹಂಬಲ ದೂರವಾಗುತ್ತದೆ. ನಾನು-ನನ್ನದು ಎಂಬ ಭಾವ ಮರೆಯಾಗುತ್ತದೆ. ದೇಹ ಪೋಷಣೆಗಷ್ಟೇ ಕರ್ಮ ಮಾಡಿದರೂ ದೋಷ ತಟ್ಟುವುದಿಲ್ಲ.

ನಿತ್ಯತೃಪ್ತರಾಗಿರಬೇಕು ಅನ್ನುವ ಆಸೆ ಇದೆ ಆದರೆ ಅದನ್ನು ರೂಢಿಸಿಕೊಳ್ಳುವುದು ಹೇಗೆ? ಈ ಪ್ರಶ್ನೆಗೆ ಇಲ್ಲಿ ಕೃಷ್ಣ ಉತ್ತರಿಸುತ್ತಾನೆ. ಲೌಕಿಕ ಆಸೆ ಇದ್ದಾಗ ಅತೃಪ್ತಿ ತಪ್ಪಿದ್ದಲ್ಲ. ಇಲ್ಲದ್ದನ್ನು ಬಯಸಿ ಎಂದೂ ಸುಖ ಸಿಗುವುದಿಲ್ಲ. ತೃಪ್ತಿ ಇರಬೇಕಾದರೆ ಮೊದಲು ಬೇಕು ಬೇಡಗಳ ಪಟ್ಟಿಯನ್ನು ಕಡಿಮೆ ಮಾಡಬೇಕು. ಮೊದಲು 'ಯತಚಿತ್ತನಾಗು' ಅದರಿಂದ 'ನಿರಾಶಿಯಾಗು' (be content with whatever you have ) ಎನ್ನುತ್ತಾನೆ ಕೃಷ್ಣ. ಮೊದಲು ನಾವು ನಮ್ಮ ಚಿತ್ತವನ್ನು ಮತ್ತು ಮನಸ್ಸನ್ನು ನಿಯಂತ್ರಣದಲ್ಲಿಟ್ಟುಕೊಳ್ಳಬೇಕು. ಇಲ್ಲಿ ಚಿತ್ತ ಎಂದರೆ ನಮ್ಮ ಹಿಂದಿನ ನೆನಪುಗಳು(Memory). ಹಿಂದೆ ಮೂಡಿದ ಆಸೆಗಳ ನೆನಪಿನಕೋಶ-ಚಿತ್ತ. ಚಿತ್ತದಲ್ಲಿ ಆಸೆ ನಿರಾಸೆಗಳ ಕಂತೆ ತುಂಬಿರುತ್ತದೆ. ಮೊದಲು ಹಿಂದಿನ ಆಸೆಗಳು ಮರುಕಳಿಸದಂತೆ ನೋಡಿಕೋ. ಭೂತಕಾಲವನ್ನು ಮತ್ತೆ ಕೆದುಕಬೇಡ. ಅದನ್ನು ಪೂರ್ತಿ ಬಿಟ್ಟುಬಿಡು ಹಾಗೂ ಮನಸ್ಸು ವರ್ತಮಾನ ಕಾಲದಲ್ಲಿ ಬೇಕು ಬೇಡಗಳೆಡೆಗೆ ಹರಿಯದಂತೆ ನಿಯಂತ್ರಣ ಮಾಡು. ಈ ರೀತಿ ನಾವು ರೂಢಿ ಮಾಡಿಕೊಂಡರೆ ಇದರಿಂದ ತೃಪ್ತರಾಗಿರಲು ಸಾಧ್ಯ. ಹೀಗೆ ತೃಪ್ತಿಯನ್ನು ಸಾಧಿಸಿದ ನಂತರ ಅದರ ಜೊತೆಗೆ 'ಆತ್ಮಾತ್ಯಕ್ತ ಸರ್ವ ಪರಿಗ್ರಹಃ'. ಇಲ್ಲಿ ಪರಿಗ್ರಹ ಎಂದರೆ ಸಂಸಾರ, ಕುಟುಂಬ, ಎಲ್ಲವನ್ನೂ ಬಿಟ್ಟು ಕಾಡಿಗೆ ಹೋಗುವುದಲ್ಲ. ಎಲ್ಲವುದರ ಜೊತೆಗೆ ಇದ್ದೂ ಅದರ ಮೇಲಿನ

ಅತೀವ ಮೋಹ(Over attachment)ವನ್ನು ಬಿಟ್ಟುಬಿಡುವುದು. ಅಭಿಮಾನ ತ್ಯಾಗ (Detached attachment)ಮಾಡುವುದು. ಎಲ್ಲವೂ ಇರಲಿ ಆದರೆ ಅದನ್ನೇ ಹಚ್ಚಿಕೊಂಡು ಅದರಲ್ಲೇ ಮುಳುಗಬೇಡ. ಅದರೊಂದಿಗೆ ಬದುಕು- ಆದರೆ ಅಂಟಿಸಿಕೊಳ್ಳಬೇಡ. ತಾವರೆಯ ಎಲೆ ಹೇಗೆ ನೀರಿನಲ್ಲೇ ಇದ್ದು ನೀರನ್ನು ಅಂಟಿಸಿಕೊಳ್ಳುವುದಿಲ್ಲವೋ ಹಾಗೆ. ಹೀಗೆ ಇದ್ದಾಗ ನಾವು ಎಲ್ಲಾ ಮಾಡಿದರೂ ಏನೂ ಮಾಡುವುದಿಲ್ಲ. ಏಕೆಂದರೆ ಅರಿವಿನಿಂದ ಮಾಡಿದಾಗ ಕರ್ಮದ ಲೇಪವಿಲ್ಲ. ನಾವು ಅಂಟಿಸಿಕೊಳ್ಳದೇ ಬದುಕಲು ಕಲಿತರೆ ಕರ್ಮ ಕೂಡಾ ನಮಗೆ ಅಂಟುವುದಿಲ್ಲ. ಶರೀರ ನಿರ್ವಹಣೆಗೆ ಬೇಕಾದ ಕರ್ಮವನ್ನು ಮಾನಸಿಕವಾಗಿ ಅಂಟಿಸಿಕೊಳ್ಳದೇ, ಬಡಾಯಿ ಇಲ್ಲದೇ ಕರ್ಮ ನಿರ್ವಹಿಸು. ಆಗ ಕರ್ಮದ ಕೊಳೆ ನಿನಗಂಟುವುದಿಲ್ಲ ಎನ್ನುತ್ತಾನೆ ಕೃಷ್ಣ.

ಯದೃಚ್ಛಾಲಾಭಸಂತುಷ್ಟೋ ದ್ವಂದ್ವಾತೀತೋ ವಿಮತ್ಸರಃ ।
ಸಮಃ ಸಿದ್ಧಾವಸಿದ್ಧೌ ಚ ಕೃತ್ವಾಽಪಿ ನ ನಿಬಧ್ಯತೇ ॥೨೨॥

ಯದೃಚ್ಛಾ ಲಾಭ ಸಂತುಷ್ಟಃ ದ್ವಂದ್ವ ಅತೀತಃ ವಿಮತ್ಸರಃ |
ಸಮಃ ಸಿದ್ಧೌ ಅಸಿದ್ಧೌ ಚ ಕೃತ್ವಾ ಅಪಿ ನ ನಿಬಧ್ಯತೇ -- ತಾನಾಗಿಯೇ ಸಿಕ್ಕಿದ್ದುದರಲ್ಲಿ ಸಂತಸಪಡುವವನು, ಬದುಕಿನ ಇಬ್ಬಂದಿತನವನ್ನು ಮೀರಿನಿಂತವನು, ಹೆರವರ ಏಳಿಗೆಗೆ ಕಿಚ್ಚುಪಡದವನು, ಗಳಿಕೆಯನ್ನೂ ಕಲಿಕೆಯನ್ನೂ ಒಂದೇ ಬಗೆಯಿಂದ ಕಾಣುವವನು ಕರ್ಮ ಮಾಡಿದರೂ ಅದರ ಸೆರೆಗೆ ಸಿಕ್ಕುವುದಿಲ್ಲ.

ನಮ್ಮ ಮನಸ್ಸು ನಮ್ಮ ಹಿಡಿತಕ್ಕೆ ಬಂದಾಗ ಕಾಣುವ ಮುಖ್ಯ ಲಕ್ಷಣದ ಬಗ್ಗೆ ಇಲ್ಲಿ ವಿವರಣೆ ಇದೆ. ತೃಪ್ತಿಯನ್ನು ಸಾಧಿಸಿದವನಿಗೆ ಏನಾದರೂ ಸಿಕ್ಕಿದರೆ ಅದರಲ್ಲೇ ಸಂತೋಷವಾಗಿರುತ್ತಾನೆ. ಸಿಕ್ಕಿದ್ದು ಸಾಲದೆಂದಾಗಲೀ, ಇನ್ನೇನೋ ಸಿಗಲಿ ಎಂದಾಗಲೀ ಆತನ ಮನಸ್ಸು ಬಯಸುವುದಿಲ್ಲ. ಏಕೆಂದರೆ ನಮಗೆ ಏನೇ ಸಿಕ್ಕಿದರೂ ಅದು ಭಗವಂತನ ಇಚ್ಛೆಯಿಂದ ಸಿಕ್ಕಿರುವುದು. ಉದಾಹರಣೆಗೆ ಉದ್ಯೋಗ. ಪ್ರತಿಭೆ ಇದ್ದವರಿಗೆಲ್ಲಾ ಉದ್ಯೋಗ ಸಿಗುವುದಿಲ್ಲ. ಉದ್ಯೋಗ ಸಿಗುವುದು, ಅದರಿಂದ ಸಂಬಳ ಸಿಗುವುದು- ಎಲ್ಲವೂ ಭಗವಂತನ ಇಚ್ಛೆಯಂತೆ. ಆದ್ದರಿಂದ ಎಲ್ಲವೂ ಭಗವಂತನ ಸಂಕಲ್ಪ ಎಂದು ತಿಳಿದು ನಿಸ್ವಾರ್ಥ ಕರ್ಮದಲ್ಲಿ ತೊಡಗಿದಾಗ ಮನಸ್ಸು ನಿರ್ಮಲವಾಗುತ್ತದೆ. ಈ ಸ್ಥಿತಿಯಲ್ಲಿ ಅಹಂಕಾರ ಎಂದೂ ಹತ್ತಿರ ಸುಳಿಯುವುದಿಲ್ಲ. ಬಡತನವಾಗಲೀ, ಸಿರಿತನವಾಗಲೀ, ನಾವು ಹುಟ್ಟುವ ಮನೆಯಾಗಲೀ, ಯಾವುದೂ ನಮ್ಮ ಕೈಯಲ್ಲಿಲ್ಲ. ಎಲ್ಲವೂ ಆ ಈಶ್ವರ ಇಚ್ಛೆ. ಇದನ್ನು ತಿಳಿದು ಬದುಕುವುದು ಯತಚಿತ್ತಾತ್ಮನ ಗುರುತು.

ಇನ್ನು ಎರಡನೇ ಲಕ್ಷಣ 'ದ್ವಂದ್ವಾತೀತ ಜೀವನ'. ನಮ್ಮ ಜೀವನ ಎಂದರೆ ದ್ವಂದ್ವ. ಹಗಲು-ರಾತ್ರಿ, ಲಾಭ-ನಷ್ಟ, ಸೋಲು-ಗೆಲುವು, ಹುಟ್ಟು-ಸಾವು ಹೀಗೆ ಎಲ್ಲವೂ ದ್ವಂದ್ವ. ನಾವು ಈ ದ್ವಂದ್ವದ ನಡುವೆಯೇ ಬದುಕಬೇಕು. ಹಗಲು-ರಾತ್ರಿಗೆ ನಾವು ಹೇಗೆ ಹೊಂದಿಕೊಂಡು ಬದುಕುತ್ತೇವೆಯೋ ಹಾಗೇ 'ಇತರ ದ್ವಂದ್ವದ ಆಘಾತಕ್ಕೆ ಒಳಗಾಗದೇ ಬದುಕಲು ಕಲಿ' ಎನ್ನುತ್ತಾನೆ ಕೃಷ್ಣ. ಸಿಗದಿದ್ದಾಗ ದುಃಖವಿಲ್ಲ, ಸಿಕ್ಕಾಗ ಹಾರಾಟವಿಲ್ಲ. ಎರಡೂ ಸ್ಥಿತಿಯಲ್ಲಿ ಏಕರೂಪವಾದ ಮನಃಸ್ಥಿತಿಯನ್ನು ಗಳಿಸುವುದು ದ್ವಂದ್ವಾತೀತ ಜೀವನ.

ದ್ವಂದ್ವಾತೀತನಾಗಿ ಬದುಕುವಾಗ ಒಂದು ಸಮಸ್ಯೆ ಎದುರಾಗುತ್ತದೆ. ಇದ್ದದ್ದು ಸಾಕು ಎಂದು ಬದುಕುತ್ತಿರುವಾಗ ನಮ್ಮ ಜೊತೆಗಿನ ಇನ್ನೊಬ್ಬ ಹೆಚ್ಚು ಗಳಿಸಲಾರಂಬಿಸಿದರೆ, ಅದನ್ನು ನೋಡಿ ನಮಗೆ ಕಿಚ್ಚು ಹುಟ್ಟಿಕೊಳ್ಳುತ್ತದೆ. ನಮ್ಮ ಕೆಳಗಿನ ಮಟ್ಟದವರು, ನಮ್ಮ ಪಕ್ಕದ ಮನೆಯವರು ಯಾವುದೋ ಕಾರಣಕ್ಕೆ ಶ್ರೀಮಂತರಾದರೆ ನಮಗೆ ಸಂಕಟ! ಇಲ್ಲಿ ಕೃಷ್ಣ ಹೇಳುತ್ತಾನೆ: "ಇನ್ನೊಬ್ಬರನ್ನು ಕಂಡು ಎಂದೂ ಕಿಚ್ಚು ಪಡಬೇಡ" ಎಂದು. ಯಾರ್ಯಾರಿಗೆ ಎಷ್ಟೆಷ್ಟು ಸಿಗಬೇಕೋ ಅಷ್ಟಷ್ಟೇ ಸಿಗುತ್ತದೆ. ನಾವು ಎಷ್ಟು ಕೌಶಲ್ಯವಂತ(expertise)ರಾದರೂ ಕೂಡಾ ಭಗವಂತ ಅನುಗ್ರಹಿಸದೇ ಇದ್ದರೆ ನಾವು ಮೇಲಕ್ಕೇಳಲು ಸಾಧ್ಯವಿಲ್ಲ. ಈ ಎಚ್ಚರವೇ "ಯದೃಚ್ಛಾ ಲಾಭ ಸಂತುಷ್ಟಃ"
ಇನ್ನು ಸಿದ್ಧಿ ಅಸಿದ್ಧಿಗಳು. ಉದಾಹರಣೆಗೆ ಧ್ಯಾನ(Meditation): ಧ್ಯಾನದಲ್ಲಿ ಏಕಾಗ್ರತೆ ಪಡೆಯಲು ಆಗದೇ ಇನ್ನೇನೋ ಕಾಣಿಸಿದರೆ ಏನು ಕಾಣಿಸಿತೋ ಅದರಲ್ಲೇ ಭಗವಂತನನ್ನು ಕಾಣು. ಅದಕ್ಕಾಗಿ ತಲೆ ಕೆಡಿಸಿಕೊಳ್ಳಬೇಡ. ಏಕಾಗ್ರತೆ ಸಾಧ್ಯವಾದರೆ ಭ್ರಮೆಗೊಳಗಾಗಬೇಡ. ಏಕೆಂದರೆ ಸಿದ್ಧಿ-ಅಸಿದ್ಧಿಗಳು ನಮ್ಮ ಕೈಯಲ್ಲಿಲ್ಲ. ಅಸಿದ್ಧಿಯೂ ಸಿದ್ಧಿಯ ಮೆಟ್ಟಿಲು. ಇಂತಹ ಮಾನಸಿಕ ಸಮತೋಲನ ಜೀವನದಲ್ಲಿ ಅತಿಮುಖ್ಯ. ಇಂತಹ ಸ್ಥಿತಿಯಲ್ಲಿ ಕರ್ಮ ಎಂದೂ ಬಂಧಕವಾಗುವುದಿಲ್ಲ.

ಗತ ಸಂಗಸ್ಯ ಮುಕ್ತಸ್ಯ ಜ್ಞಾನಾವಸ್ಥಿತಚೇತಸಃ ।
ಯಜ್ಞಾಯಾಽಚರತಃ ಕರ್ಮ ಸಮಗ್ರಂ ಪ್ರವಿಲೀಯತೇ ॥೨೩॥

ಗತ ಸಂಗಸ್ಯ ಮುಕ್ತಸ್ಯ ಜ್ಞಾನ ಅವಸ್ಥಿತ ಚೇತಸಃ |
ಯಜ್ಞಾಯ ಆಚರತಃ ಕರ್ಮ ಸಮಗ್ರಮ್ ಪ್ರವಿಲೀಯತೇ -ಫಲದ ನಂಟು ತೊರೆದು, ದೇಹಾಭಿಮಾನ ತೊರೆದು, ಭಗವಂತನ ಅರಿವಿನಲ್ಲೇ ಬಗೆನೆಟ್ಟು, ಪೂಜೆಯೆಂದು ಮಾಡುವವನ ಎಲ್ಲಾ ಕರ್ಮ ಲಯಗೊಳ್ಳುತ್ತದೆ.

ಈ ಶ್ಲೋಕದಲ್ಲಿ ಮೇಲೆ ಹೇಳಿದ ಎಲ್ಲಾ ವಿಷಯವನ್ನು ಉಪಸಂಹಾರ ರೂಪದಲ್ಲಿ ಭಗವಂತ ನಮ್ಮ ಮುಂದಿಟ್ಟಿದ್ದಾನೆ.
ಫಲದ ಬಗ್ಗೆ ಅತಿಯಾದ ಆಸೆ ಇಟ್ಟುಕೊಳ್ಳಬೇಡ; ಅತಿಯಾದ ನಿರೀಕ್ಷೆ ಬೇಡ; ಕರ್ತವ್ಯನಿಷ್ಠೆ ಇರಲಿ; ದೇಹಾಭಿಮಾನ, ಪರಿವಾರದ ಅಭಿಮಾನವನ್ನು ತೊರೆದು ನಿರ್ಲಿಪ್ತನಾಗಿ ಬದುಕಲು ಕಲಿ; ಮನಸ್ಸನ್ನು ಜ್ಞಾನಸ್ವರೂಪನಾದ ಭಗವಂತ(ಚೇತಸ್ಸು)ನಲ್ಲಿ ನೆಲೆಗೊಳಿಸು. ಹೀಗೆ ಬದುಕಿದಾಗ ನಾವು ಮಾಡುವ ಕರ್ಮವೆಲ್ಲವೂ ಯಜ್ಞವಾಗಿ ಯಜ್ಞ ನಾಮಕ ಭಗವಂತನನ್ನು ಸೇರುತ್ತದೆ ಹಾಗೂ ಜ್ಞಾನದ ಬೆಂಕಿಯಲ್ಲಿ ಕರ್ಮದ ಕೊಳೆ ಸುಟ್ಟುಹೋಗುತ್ತದೆ.

ಬ್ರಹ್ಮಾರ್ಪಣಂ ಬ್ರಹ್ಮ ಹವಿರ್ಬ್ರಹ್ಮಾಗ್ನೌ ಬ್ರಹ್ಮಣಾ ಹುತಮ್ ।
ಬ್ರಹ್ಮೈವ ತೇನ ಗಂತವ್ಯಂ ಬ್ರಹ್ಮಕರ್ಮಸಮಾಧಿನಾ ॥೨೪॥

ಬ್ರಹ್ಮ ಅರ್ಪಣಮ್ ಬ್ರಹ್ಮ ಹವಿಃ ಬ್ರಹ್ಮ ಅಗ್ನೌ ಬ್ರಹ್ಮಣಾ ಹುತಮ್ ।

ಬ್ರಹ್ಮ ಏವ ತೇನ ಗಂತವ್ಯಮ್ ಬ್ರಹ್ಮ ಕರ್ಮ ಸಮಾಧಿನಾ-ಅರ್ಪಣವೂ ಭಗವಂತ [ಭಗವಂತನಲ್ಲಿ ಅರ್ಪಣ]. ಅರ್ಪಿಸುವ ಹವಿಸ್ಸೂ ಭಗವಂತ[ಭಗವಂತನಾದ ಹವಿಸ್ಸು]. ಬೆಂಕಿಯ ರೂಪದಲ್ಲಿರುವ ಭಗವಂತನಲ್ಲಿ [ಭಗವದಧೀನವಾದ ಬೆಂಕಿಯಲ್ಲಿ] ಭಗವಂತನಿಂದಲೇ ಹೋಮಮಾಡಿತು. ಬಗೆಯ ಏಕಾಗ್ರತೆಯ ಜತೆಗೆ ಕರ್ಮದ ವ್ಯಗ್ರತೆಯೂ ಭಗವಂತನೇ [ಭಗವಂತನ ಅಧೀನವಾದದ್ದು]

ಅಭಿಮಾನ ತ್ಯಾಗದಿಂದ ಜ್ಞಾನದ ಸ್ಥಿತಿಯಲ್ಲಿ ಕರ್ಮ ಮಾಡಿದರೆ ಹೇಗಿರುತ್ತದೆ ಎನ್ನುವುದಕ್ಕೆ ಉತ್ತರ "ಬ್ರಹ್ಮಾರ್ಪಣಂ ಬ್ರಹ್ಮಹವಿಃ" . ಇಲ್ಲಿ ಅರ್ಪಣ ಅನ್ನುವುದನ್ನು ಈ ರೀತಿ ಅರ್ಥ ಮಾಡಿಕೊಳ್ಳಬಹುದು. ನಾವು ಒಂದು ಹವಿಸ್ಸನ್ನು ಅಗ್ನಿಯಲ್ಲಿ ಭಗವಂತನಿಗೆ ಅರ್ಪಣೆ ಮಾಡುತ್ತೇವೆ- ಇದು ಅರ್ಪಣೆ. ಒಬ್ಬ ಹಸಿದವನಿಗೆ ಅನ್ನ ನೀಡುತ್ತೇವೆ-ಇದು ಅರ್ಪಣೆ. ಒಬ್ಬ ಯೋಗ್ಯ ವರನಿಗೆ ಕನ್ಯಾದಾನ ಮಾಡುತ್ತೇವೆ-ಇದು ಅರ್ಪಣೆ. ಒಬ್ಬ ಹಣದ ಸಮಸ್ಯೆಯಲ್ಲಿದ್ದಾಗ ಆತನಿಗೆ ಸಹಾಯ ಮಾಡುತ್ತೇವೆ-ಇದು ಅರ್ಪಣೆ. ಇಲ್ಲಿ ಕೊಡುವವನೂ ಆ ಭಗವಂತ, ತೆಗೆದುಕೊಳ್ಳುವವನ ಒಳಗಿದ್ದು ಸ್ವೀಕರಿಸುವವನೂ ಅವನೇ. ಎಲ್ಲವೂ ಭಗವಂತನ ಇಚ್ಛೆಯಂತೆ ನಡೆಯುತ್ತದೆ. ಹವಿಸ್ಸು ಅಂದರೆ ಕೊಡುವ ವಸ್ತು. ಅರ್ಪಣ-ಕೊಡುವ ಕ್ರಿಯೆ. ಯಾವ ವಸ್ತು ಕೂಡಾ ಹವಿಸ್ಸಾಗಬಹುದು. ದಾನದ ದ್ರವ್ಯ-ಹವಿಸ್ಸು, ಯಜ್ಞದಲ್ಲಿ ಅಗ್ನಿ ಮುಖೇನ ಅರ್ಪಿಸುವ ದ್ರವ್ಯ-ಹವಿಸ್ಸು. ನಾವು ಹುಟ್ಟುವಾಗ ಏನನ್ನೂ ತೆಗೆದುಕೊಂಡು ಬಂದಿಲ್ಲ, ಎಲ್ಲವನ್ನೂ ಈ ಪ್ರಕೃತಿಯಿಂದ ಪಡೆದಿರುವುದು ಅಂದಮೇಲೆ, ನಾವು ಕೊಡುವ ಹವಿಸ್ಸು ಕೂಡಾ ಆ ಭಗವಂತನ ಅಧೀನ. ಇಲ್ಲಿ 'ನನ್ನದು' ಎನ್ನುವುದು ಹಾಸ್ಯಾಸ್ಪದ.

ಅಗ್ನಿ ಮುಖೇನ ನಾವು ದ್ರವ್ಯವನ್ನು ಅರ್ಪಿಸುತ್ತೇವೆ. ಇಲ್ಲಿ ಅಗ್ನಿ ಎಂದರೆ ಬರಿಯ ಜಡವಾದ ಬೆಂಕಿ ಅಲ್ಲ. ಸಂಸ್ಕೃತದಲ್ಲಿ ಅಗ್ನಿ ಎಂದರೆ ಅಗ್ನಿಯ ಅಭಿಮಾನಿ ದೇವತೆ, ಅದು ಚೇತನ. ಈ ಕಾರಣಕ್ಕಾಗಿ ಅಗ್ನಿಯನ್ನು ಸಾಕ್ಷಿಯಾಗಿ ಬಳಸುತ್ತಾರೆ (ಉದಾ: ಅಗ್ನಿಸಾಕ್ಷಿಯಾಗಿ ಮದುವೆಯಾಗುವುದು). ಜಡವನ್ನು ಎಂದೂ ಸಾಕ್ಷಿಯಾಗಿ ಬಳಸಲು ಬರುವುದಿಲ್ಲ. ಈ ಅಗ್ನಿದೇವತೆಯ ಒಳಗೆ ತಾರಕ ಶಕ್ತಿಯಾಗಿ ಆ ಭಗವಂತನಿದ್ದಾನೆ. ಇಲ್ಲಿ ಕೊಡುವುದು, ಕೊಡತಕ್ಕದ್ದು, ಕೊಡುವ ಕ್ರಿಯೆ, ಕೊಟ್ಟ ಸ್ಥಳ-ಎಲ್ಲವೂ ಭಗವಂತನ ಅಧೀನ. ಎಲ್ಲಾ ಕ್ರಿಯೆಯಲ್ಲಿ ಭಗವಂತನ ಸನ್ನಿಧಾನವಿದೆ. ಕೊಡತಕ್ಕ ವಸ್ತುವಿನಲ್ಲಿ ಆತನ ಸನ್ನಿಧಾನವಿರುವುದರಿಂದ ಅದು ಉಪಯುಕ್ತವಾಗಿರುತ್ತದೆ. ಜ್ಞಾನರೂಪನಾದ ಭಗವಂತ ಅಗ್ನಿಯಲ್ಲಿ ಸನ್ನಿಹಿತನಾಗಿ ಭಕ್ತಿ ರೂಪದ ಆಹುತಿಯನ್ನು ಸ್ವೀಕರಿಸುತ್ತಾನೆ. ಈ ಅನುಸಂಧಾನದಿಂದ ನಮ್ಮ ಕ್ರಿಯೆ ನಡೆದರೆ, ನಾವು ಭಗವಂತನ ಆರಾಧನೆ ಮಾಡಿದಾಗ "ಬ್ರಹ್ಮೈವ ತೇನ ಗಂತವ್ಯಂ"-ಹೋಗಿ ಸೇರುವುದೂ ಭಗವಂತನನ್ನೇ. ಏಕೆಂದರೆ "ಬ್ರಹ್ಮಕರ್ಮಸಮಾಧಿನಾ" -ಎಲ್ಲವೂ ಸರ್ವಸಮರ್ಥನಾದ ಭಗವಂತನ ಅಧೀನ.

ಇಲ್ಲಿ ಬ್ರಹ್ಮಾರ್ಪಣ ಎಂದರೆ ಎಲ್ಲಾ ಕ್ರಿಯೆಯೂ ಭಗವಂತನಿಗೆ ಎಂದರ್ಥ. ಪ್ರಪಂಚದಲ್ಲಿರುವ ಎಲ್ಲಾ ವಸ್ತುವನ್ನು ಸೃಷ್ಟಿಸಿದ್ದು ಆ ಭಗವಂತ. ಪ್ರಕೃತಿಯಲ್ಲಿ ಸೃಷ್ಟಿಯಾಗಿರುವುದನ್ನು ನಾವು ಉಪಯೋಗಿಸುತ್ತೇವೆ ಅಷ್ಟೇ. ಅಗ್ನಿ ಭಗವಂತನ ಅಧೀನವಾಗಿ ಕಾರ್ಯ ನಿರ್ವಹಿಸುತ್ತಾನೆ. 'ನಾವು ಮಾಡುವ ಕ್ರಿಯೆ ಆ ಭಗವಂತನ ಪ್ರೇರಣೆ. ನಾವು ಮಾಡುವ ಎಲ್ಲಾ ಕರ್ಮವೂ ಬ್ರಹ್ಮಕರ್ಮ. ಅದು ಭಗವಂತನ ಪೂಜಾರೂಪವಾದ ಕರ್ಮ'- ಇದು ಕರ್ಮದ ಬಗ್ಗೆ ನಮಗಿರಬೇಕಾದ ಜ್ಞಾನ. ನಾವು ಮಾಡುವ ಕರ್ಮದಲ್ಲಿ ನಮ್ಮ ಸ್ವಾರ್ಥ ಇರಕೂಡದು. ಅದು ಭಗವಂತನ ಪೂಜಾ ರೂಪವಾಗಿರಬೇಕು. ಯಜ್ಞ ಎಂದರೆ ಅಗ್ನಿ ಮುಖೇನ ಮಾಡುವ ಕ್ರಿಯೆ ಮಾತ್ರ ಅಲ್ಲ. ನಮ್ಮ ಬದುಕನ್ನು

ಭಗವನ್ಮಯ ಮಾಡಿಕೊಂಡಾಗ ನಮ್ಮ ಜೀವನದ ಎಲ್ಲಾ ನಡೆಯೂ ಯಜ್ಞವಾಗಿಬಿಡುತ್ತದೆ. ನಮ್ಮ ಬದುಕು ಭಗವಂತನ ಚಿಂತನೆಗೆ ಮೀಸಲಾದಾಗ ನಮ್ಮ ಬದುಕೇ ಒಂದು ಮಹಾಯಜ್ಞ. ಭಗವಂತನ ಚಿಂತನೆ ಇಲ್ಲದೆ ಸ್ವಾರ್ಥದಿಂದ ಮಾಡುವ ಅಗ್ನಿಮುಖೇನವಾದ ಯಜ್ಞ ಕೇವಲ ವ್ಯಾಪಾರ. ಪೌರೋಹಿತ್ಯ ಕೂಡಾ ಹೀಗೆ. ತಿಳಿದು ಮಾಡಿದಾಗ ಮಾತ್ರ ಅದು ನಿಜವಾದ ಪೌರೋಹಿತ್ಯ, ಇಲ್ಲದಿದ್ದರೆ ಅದು ಕೇವಲ ದುಡ್ಡಿಗಾಗಿ ಮಾಡುವ ದಂದೆ!

ಈ ತನಕ ಕೃಷ್ಣ ಕರ್ಮದ ಪ್ರಭೇದದ ಬಗ್ಗೆ ಹೇಳಿದ. ದೇವರ ಪೂಜಾರೂಪವಾಗಿ ಮಾಡುವ ಪ್ರತಿಯೊಂದು ಕಾರ್ಯ ಕೂಡಾ ಯಜ್ಞ ಎನ್ನುವ ವಿಚಾರ ವಿಶ್ಲೇಷಣೆ ಮಾಡಿದ. ಮುಂದೆ ಯಜ್ಞದ ಬಗ್ಗೆ ವ್ಯಾಪಕವಾದ ಅರ್ಥವನ್ನು ಕೃಷ್ಣ ವಿವರಿಸುತ್ತಾನೆ. ಹಿಂದೆ ಹೇಳಿದಂತೆ ಅಗ್ನಿಮುಖದಲ್ಲಿ ಮಾಡುವ ಪೂಜೆ ಮಾತ್ರ ಯಜ್ಞವಲ್ಲ. ಕೊಡುವಿಕೆ, ಪೂಜೆಯಂತಹ ಒಳ್ಳೆಯ ಕಾರ್ಯಕ್ಕೆ ಒಂದು ಕಡೆ ಸೇರುವಿಕೆ(ಸಂಗತೀಕರಣ), ಜ್ಞಾನದಾನ, ಅನ್ನದಾನ, ನಮ್ಮಲ್ಲಿ ಹೆಚ್ಚಿಗೆ ಇರುವುದನ್ನು ಇಲ್ಲದವರಿಗೆ ಹಂಚಿ ಬದುಕುವುದು, ಎಲ್ಲವೂ ಒಂದು ಯಜ್ಞವೇ. ಮುಂದಿನ ಶ್ಲೋಕಗಳಲ್ಲಿ ಯಜ್ಞದ ವಿಶ್ವತೋಮುಖ ಚಿತ್ರವನ್ನು ಕೃಷ್ಣ ನಮಗೆ ನೀಡುತ್ತಾನೆ.

ಸಾಮಾನ್ಯವಾಗಿ ಯಜ್ಞದಲ್ಲಿ ಎರಡು ವಿಧ. ಒಂದು ಅಂತರಂಗ ಯಜ್ಞ ಇನ್ನೊಂದು ಬಾಹ್ಯಯಜ್ಞ. ಅಂತರಂಗದಲ್ಲಿ ಭಗವಂತನ ನಿರಂತರ ಪೂಜೆ(ದೇವಪೂಜಾ); ಚಿತ್ತ-ಮನಸ್ಸು ಭಗವಂತನ ಜೊತೆಗೆ ಸೇರುವುದು(ಸಂಗತೀಕರಣ) ಮತ್ತು ನಮ್ಮನ್ನು ನಾವು ಭಗವಂತನಿಗೆ ಅರ್ಪಿಸಿಕೊಳ್ಳುವುದು-ಇದು ಪರಿಪೂರ್ಣವಾದ ಮಾನಸ ಯಜ್ಞ. ಇನ್ನೊಂದು ರೀತಿಯಲ್ಲಿ ಯಜ್ಞದಲ್ಲಿ ಎರಡು ಬಗೆ: ಜ್ಞಾನಪ್ರದವಾದ ಯಜ್ಞ ಹಾಗೂ ಕರ್ಮಪ್ರದವಾದ ಯಜ್ಞ. ಈ ಎಲ್ಲಾ ವಿವರಣೆಯನ್ನು ಮುಂದಿನ ಶ್ಲೋಕಗಳಲ್ಲಿ ಕೃಷ್ಣ ವಿವರಿಸಿದ್ದಾನೆ.

ದೈವಮೇವಾಪರೇ ಯಜ್ಞಂ ಯೋಗಿನಃ ಪರ್ಯುಪಾಸತೇ ।
ಬ್ರಹ್ಮಾಗ್ನಾವಪರೇ ಯಜ್ಞಂ ಯಜ್ಞೇನೈವೋಪಜುಹ್ವತಿ ॥೨೫॥

ದೈವಮ್ ಏವ ಅಪರೇ ಯಜ್ಞಮ್ ಯೋಗಿನಃ ಪರ್ಯುಪಾಸತೇ ।
ಬ್ರಹ್ಮ ಅಗ್ನೌ ಅಪರೇ ಯಜ್ಞಮ್ ಯಜ್ಞೇನ ಏವ ಉಪಜುಹ್ವತಿ-ಕೆಲವು ಸಾಧಕರು ಭಗವದುಪಾಸನೆಯೆಂಬ ಮಾನಸ ಯಜ್ಞವನ್ನು ಆಚರಿಸುತ್ತಾರೆ.[ಭಗವಂತನನ್ನೇ ಯಜ್ಞ ರೂಪನೆಂದು ಪೂಜಿಸುತ್ತಾರೆ.] ಕೆಲವರು ಬೆಂಕಿಯ ರೂಪದ ಭಗವಂತನಲ್ಲಿ ಹೋಮಿಸುವ ಮೂಲಕ ಬಾಹ್ಯ ಯಜ್ಞದಿಂದ ಯಜ್ಞ ನಾಮಕ ಭಗವಂತನನ್ನು ಪೂಜಿಸುತ್ತಾರೆ.[ಯಜ್ಞನಾಮಕ ಭಗವಂತನಿಂದಲೇ ಬಾಹ್ಯ ಯಜ್ಞವನ್ನು ಆಚರಿಸುತ್ತಾರೆ].

ಭಗವಂತನ ಉಪಾಸನೆಯ ಮಾರ್ಗದಲ್ಲಿ ಸಾಗುವ ಕೆಲವು ಯೋಗಿಗಳು(ಸಾಧಕರು) ದೈವವನ್ನೇ ಯಜ್ಞವಾಗಿ ಉಪಾಸನೆ ಮಾಡುತ್ತಾರೆ. ಅಂದರೆ ನಿರಂತರ ಅಂತರಂಗದಲ್ಲಿ ಭಗವಂತನ ಉಪಾಸನೆಯೇ ಅವರ ಯಜ್ಞ. ಇದಕ್ಕೆ ಯಾವ ಬಾಹ್ಯ ಪರಿಕರ ಬೇಡ. ಇದು ಧ್ಯಾನ ರೂಪ ಯಜ್ಞ. ಈ ರೀತಿ ಬಾಹ್ಯ ಪರಿಕರಗಳಿಲ್ಲದೇ ಮಾಡುವ ಯಜ್ಞ ಅತ್ಯಂತ ಶ್ರೇಷ್ಠ ಯಜ್ಞ. ಇದು ಸಾಮಾನ್ಯವಾಗಿ ಅತ್ಯಂತ ಎತ್ತರಕ್ಕೇರಿದ ಸಾಧಕರು ಮಾಡಬಲ್ಲ ಯಜ್ಞ. ಎಲ್ಲಾ ಬಾಹ್ಯ ಪರಿಕರಗಳನ್ನು ಬಿಟ್ಟು ಮಾನಸ ಪರಿಗ್ರಹದಿಂದ ಮಾಡತಕ್ಕ ಜ್ಞಾನಪ್ರಧಾನವಾದ ಯಜ್ಞವಿದು.

ಇನ್ನೊಂದು ಪ್ರಕಾರದ ಯಜ್ಞ ಅಗ್ನಿ ಮುಖದಲ್ಲಿ ಮಾಡತಕ್ಕ ಕರ್ಮ ಪ್ರಧಾನವಾದ ಯಜ್ಞ. ಇದನ್ನು ಸಾಮಾನ್ಯ ಮಾನವರು ಅನುಸರಿಸುತ್ತಾರೆ. ಭಗವಂತನ ಸನ್ನಿಧಾನವಿರುವ ಅಗ್ನಿಯ ಮುಖದಲ್ಲಿ ಭಗವಂತನಿಗೆ ಅರ್ಪಣೆ ಮಾಡುವ ಆರಾಧನೆ. ಇದು ಬಾಹ್ಯ ಯಜ್ಞ. ಇದು ಬಹಳ ಮುಖ್ಯವಾದದ್ದು. ವೇದದಲ್ಲಿ ಭಗವಂತನ ಆರಾಧನೆಗೆ ಅತ್ಯಂತ ಮುಖ್ಯವಾದ ಪ್ರತೀಕ ಅಗ್ನಿ ಎನ್ನುತ್ತಾರೆ. ಅಗ್ನಿ ಎಂದೂ ಅಪವಿತ್ರವಲ್ಲ. ಅಗ್ನಿ ಸ್ಪರ್ಶದಿಂದ ಅಪವಿತ್ರ ಕೂಡಾ ಪವಿತ್ರವಾಗುತ್ತದೆ. ನಮಗೆ ಭಗವಂತನಿಗೆ ಏನನ್ನಾದರೂ ತಿನ್ನಿಸಬೇಕು ಎನ್ನುವ ಅಭಿಲಾಷೆ ಇದ್ದರೆ ಅದನ್ನು ಕೇವಲ ಅಗ್ನಿ ಮುಖೇನ ಮಾಡಬಹುದು. ನಮ್ಮ ಕಣ್ಣ ಮುಂದೆ ಇರುವ ಎಲ್ಲಾ ಪ್ರತೀಕಗಳಲ್ಲಿ ಅಗ್ನಿ ಅತ್ಯಂತ ಶ್ರೇಷ್ಠ ಎನ್ನುವುದು ವೇದ ಕಾಲದ ಋಷಿಗಳ ತೀರ್ಮಾನ. ಸುಡುವ ಅಗ್ನಿಯಲ್ಲಿ ಅಗ್ನಿದೇವ, ಅವನೊಳಗೆ ಪ್ರಾಣ, ಪ್ರಾಣನೊಳಗೆ ಭಗವಂತ. ಈ ಅನುಸಂಧಾನದಲ್ಲಿ ಯಜ್ಞ ನಾಮಕ ಭಗವಂತನನ್ನು, ಯಜ್ಞದಿಂದ, ಜ್ಞಾನ ಭಕ್ತಿ ವೈರಾಗ್ಯದಿಂದ ಕೂಡಿದ ಉತ್ಕೃಷ್ಟವಾದ ಆಹ್ವಾನದಿಂದ ಆರಾಧನೆ.

ಶ್ರೋತ್ರಾದೀನೀಂದ್ರಿಯಾಣ್ಯನ್ಯೇ ಸಂಯಮಾಗ್ನಿಷು ಜುಹ್ವತಿ ।
ಶಬ್ದಾದೀನ್ ವಿಷಯಾನನ್ಯ ಇಂದ್ರಿಯಾಗ್ನಿಷು ಜುಹ್ವತಿ ॥೨೬॥

ಶ್ರೋತ್ರಾ ಆದೀನಿ ಇಂದ್ರಿಯಾಣಿ ಅನ್ಯೇ ಸಂಯಮ ಅಗ್ನಿಷು ಜುಹ್ವತಿ ।
ಶಬ್ದ ಆದೀನ್ ವಿಷಯಾನ್ ಅನ್ಯ ಇಂದ್ರಿಯ ಅಗ್ನಿಷು ಜುಹ್ವತಿ-ಕೆಲವರು ಕಿವಿ ಮೊದಲಾದ ಇಂದ್ರಿಯಗಳನ್ನು ಅಂಕೆಯ ಬೆಂಕಿಯಲ್ಲಿ ಹೋಮಿಸುತ್ತಾರೆ. ಕೆಲವರು ಶಬ್ದ ಮೊದಲಾದ ವಿಷಯಗಳನ್ನು ಇಂದ್ರಿಯಗಳ ಬೆಂಕಿಯಲ್ಲಿ ಹೋಮಿಸುತ್ತಾರೆ.

ಒಬ್ಬ ಸಾಧಕನಲ್ಲಿರಬೇಕಾದ ವಿಶಿಷ್ಟ ಸಾಧನೆ ಕೂಡಾ ಒಂದು ಯಜ್ಞ. ಇಂದ್ರಿಯವೆಂಬ ಹವಿಸ್ಸನ್ನು 'ನಿಗ್ರಹ' ಎನ್ನುವ ಬೆಂಕಿಯಲ್ಲಿ ಆಹುತಿಗೊಳಿಸುವುದು ಒಂದು ಯಜ್ಞ. ಕೆಟ್ಟದ್ದನ್ನು ಕೇಳುವುದಿಲ್ಲ, ಕೆಟ್ಟದ್ದನ್ನು ಆಡುವುದಿಲ್ಲ, ಕೆಟ್ಟದ್ದನ್ನು ನೋಡುವುದಿಲ್ಲ, ಎನ್ನುವ ದೃಢ ನಿಶ್ಚಯದಿಂದ, ಇಂದ್ರಿಯ ಸಂಯಮದಿಂದ ಇಂದ್ರಿಯ ಚಾಪಲವನ್ನು ಹೋಮಿಸು. ಇದು ಇಂದ್ರಿಯ ಚಾಪಲವನ್ನು ಗೆಲ್ಲುವ ಪ್ರಕ್ರಿಯೆ. ಸಂಯಮ ಎನ್ನುವ ಅಗ್ನಿಯಲ್ಲಿ ಇಂದ್ರಿಯ ಚಾಪಲವೆಂಬ ಹವಿಸ್ಸನ್ನು ಹೋಮಿಸಿ, ಭಗವಂತನನ್ನು ಆರಾಧಿಸುವುದು. ಭಗವಂತ ಪ್ರಸನ್ನನಾಗಲಿ, ಅದರ ಮೂಲಕ ನನ್ನನ್ನು ಸಾಧನೆಯ ದಾರಿಯಲ್ಲಿ ಮುನ್ನಡೆಸಲಿ ಎನ್ನುವ ಅನುಸಂಧಾನದಲ್ಲಿ ಮಾಡುವ ಯಜ್ಞವಿದು.
ಇನ್ನು ಒಳ್ಳೆಯ ಸಂಗತಿಗಳನ್ನು ಇಂದ್ರಿಯಗಳಲ್ಲಿ ಹೋಮಿಸುವುದೂ ಒಂದು ಯಜ್ಞ. ಕಿವಿ ಎನ್ನುವ ಅಗ್ನಿ ಕುಂಡದಲ್ಲಿ ಭಗವಂತನ ಗುಣಗಾನವೆಂಬ ಹವಿಸ್ಸನ್ನು ಹಾಕುವುದು, ಕಣ್ಣು ಎನ್ನುವ ಅಗ್ನಿ ಕುಂಡದಲ್ಲಿ ಭಗವಂತನ ಪ್ರತೀಕ ಎನ್ನುವ ಹವಿಸ್ಸನ್ನು ಹಾಕುವುದು, ಮೂಗು ಎನ್ನುವ ಅಗ್ನಿ ಕುಂಡದಲ್ಲಿ ಭಗವಂತನಿಗೆ ಅರ್ಪಿತವಾದ ತುಳಸಿ, ಗಂಧ ರೂಪದ ಹವಿಸ್ಸನ್ನು ಹಾಕುವುದು. ಹೀಗೆ ಇಂದ್ರಿಯ ವಿಷಯಗಳನ್ನು ಸ್ವೀಕರಿಸುವುದೂ ಒಂದು ಯಜ್ಞವಾಗುತ್ತದೆ. ಇಂದ್ರಿಯ ನಿಗ್ರಹದಂತೆ ಇಂದ್ರಿಯ ಗ್ರಹಣ ಕೂಡಾ ಒಂದು ಯಜ್ಞ. ಭಗವಂತನ ಚಿಂತನೆಗೆ ಪೂರಕವಾದ ವಿಷಯವನ್ನು ಗ್ರಹಣ ಮಾಡು ಮತ್ತು ಅಲ್ಲದ ವಿಷಯವನ್ನು ತ್ಯಾಗ ಮಾಡು-ಇದು ಸಾಧನೆಯ ಹಾದಿಯಲ್ಲಿ ಪ್ರಮುಖ ಹೆಜ್ಜೆ.

ಸರ್ವಾಣೀಂದ್ರಿಯಕರ್ಮಾಣಿ ಪ್ರಾಣಕರ್ಮಾಣಿ ಚಾಪರೇ ।
ಆತ್ಮಸಂಯಮಯೋಗಾಗ್ನೌ ಜುಹ್ವತಿ ಜ್ಞಾನದೀಪಿತೇ ॥೨೭॥

ಸರ್ವಾಣಿ ಇಂದ್ರಿಯ ಕರ್ಮಾಣಿ ಪ್ರಾಣಕರ್ಮಾಣಿ ಚ ಅಪರೇ ।
ಆತ್ಮ ಸಂಯಮ ಯೋಗ ಅಗ್ನೌ ಜುಹ್ವತಿ ಜ್ಞಾನದೀಪಿತೇ-ಕೆಲವರು ಎಲ್ಲಾ ಇಂದ್ರಿಯ ಕ್ರಿಯೆಗಳನ್ನೂ, ಪ್ರಾಣವಾಯುವಿನ ಕ್ರಿಯೆಗಳನ್ನೂ ತಿಳಿವಿನಿಂದ ತಿಳಿಗೊಂಡ ಆತ್ಮನಿಗ್ರಹದ ಸಾಧನೆಯೆಂಬ ಬೆಂಕಿಯಲ್ಲಿ ಹೋಮಿಸುತ್ತಾರೆ.

ನಮ್ಮ ದೇಹದಲ್ಲಿ ಜ್ಞಾನೇಂದ್ರಿಯ ಹಾಗೂ ಕರ್ಮೇಂದ್ರಿಯದಿಂದ ನಿರಂತರ ಕ್ರಿಯೆ ನಡೆಯುತ್ತಿರುತ್ತದೆ. ಇದಲ್ಲದೆ ಪ್ರಾಣಶಕ್ತಿಯಿಂದ ಆಗುವ ಕ್ರಿಯೆಗಳು ಅನೇಕ (ಉದಾ: ಉಸಿರಾಟ, ಬಲ, ಸಂತಾನಶಕ್ತಿ, ಸಂತೋಷ ಅಥವಾ ದುಃಖವಾದಾಗ ಕಣ್ಣೀರು ಇತ್ಯಾದಿ). ಮನೋನಿಗ್ರಹ ಎನ್ನುವ ಅಗ್ನಿಯಲ್ಲಿ ಈ ಜ್ಞಾನೇಂದ್ರಿಯ, ಕರ್ಮೇಂದ್ರಿಯ ಮತ್ತು ಪ್ರಾಣಶಕ್ತಿಯಿಂದ ಆಗುವ ಕ್ರಿಯೆಯನ್ನು ಹೋಮಿಸುವುದು(ಹಿಡಿತ) ಒಂದು ಯಜ್ಞ. ಇದು ಹಠಕ್ಕೋಸ್ಕರ ಅಲ್ಲ, ಯಜ್ಞ ರೂಪವಾಗಿ ಭಗವಂತನ ಪೂಜಾರೂಪವಾಗಿ. ಇದು ಭಗವಂತನ ಅರಿವಿನಿಂದ ಬೆಳಗುವ ಆತ್ಮ ಸಂಯಮ. ಭಗವಂತನ ಅರಿವಿಗೋಸ್ಕರ ಮಾಡಿದ ಆತ್ಮಸಂಯಮ; ಭಗವಂತನ ಅರಿವಿನೆಡೆಗೆ ಕೊಂಡೊಯ್ಯುವ ಜ್ಞಾನಪೂರ್ವಕ ಸಂಯಮ, ಆವೇಶವಲ್ಲ.

ಯಜ್ಞಗಳ ವೈವಿಧ್ಯವನ್ನು ಹೇಳುತ್ತಾ ಮುಂದುವರಿದು ಕೃಷ್ಣ ಯಜ್ಞದ ಒಂದು ಪಟ್ಟಿಯನ್ನು ನಮ್ಮ ಮುಂದಿಡುತ್ತಾನೆ:

ದ್ರವ್ಯಯಜ್ಞಾಸ್ತಪೋಯಜ್ಞಾ ಯೋಗಯಜ್ಞಾಸ್ತಥಾಽಪರೇ ।
ಸ್ವಾಧ್ಯಾಯಜ್ಞಾನಯಜ್ಞಾಶ್ಚ ಯತಯಃ ಸಂಶಿತವ್ರತಾಃ ॥೨೮॥

ದ್ರವ್ಯ ಯಜ್ಞಾಃ ತಪಃ ಯಜ್ಞಾಃ ಯೋಗ ಯಜ್ಞಾಃ ತಥಾ ಅಪರೇ ।
ಸ್ವಾಧ್ಯಾಯ ಜ್ಞಾನ ಯಜ್ಞಾಃ ಚ ಯತಯಃ ಸಂಶಿತ ವ್ರತಾಃ -ಕೆಲವರು ಸೊತ್ತುಗಳನ್ನು ಹೋಮಿಸುವವರು. ಕೆಲವರು ತಪಸ್ಸನ್ನೇ ಭಗವಂತನಲ್ಲಿ ಹೋಮಿಸುವವರು. ಕರ್ಮ ಸಾಧನೆಯೇ ಕೆಲವರ ಯಜ್ಞ. ಚುರುಕು ನಿಷ್ಠೆಯ ಪ್ರಯತ್ನಶೀಲರಾದ ಕೆಲವರಿಗೆ ವೇದಾಧ್ಯಯನ, ಭಗವಂತನ ಅರಿವೇ ಯಜ್ಞ.

ದ್ರವ್ಯಯಜ್ಞ: ಕೆಲವರು ದ್ರವ್ಯದ ಮೂಲಕ ಭಗವಂತನನ್ನು ಆರಾಧನೆ ಮಾಡುತ್ತಾರೆ. ಇದು ಅಗ್ನಿ ಮುಖೇನವಿರಬಹುದು, ಧನದಾನ, ಅನ್ನದಾನ, ಕನ್ಯಾದಾನ ಇತ್ಯಾದಿ ದಾನಗಳ ಮುಖೇನ ಇರಬಹುದು. ಯೋಗ್ಯನಾದವನಿಗೆ, ಯೋಗ್ಯ ಕಾಲದಲ್ಲಿ, ಯೋಗ್ಯವಾದುದನ್ನು, ಅವರೊಳಗಿರುವ ಭಗವಂತ ಪ್ರೀತನಾಗಲಿ ಎಂದು ಕೊಡುವುದು ದ್ರವ್ಯ ಯಜ್ಞ.

ತಪೋಯಜ್ಞ: ಇದಕ್ಕೆ ಎರಡು ಮುಖ. ಒಂದು ಬಾಹ್ಯ ಇನ್ನೊಂದು ಅಂತರಂಗ. ಒಂದು ನಿರಂತರ ಧ್ಯಾನ, ಅದಕ್ಕೆ ಬಾಹ್ಯ ಪರಿಕರಗಳ ಅಗತ್ಯವಿಲ್ಲ. ಎರಡನೇಯದು ಭಗವಂತನ ಚಿಂತನೆಗೆ ಬೇಕಾದ

ಆತ್ಮಸಂಯಮ(discipline)-ಇದನ್ನು ತಪಸ್ಸು ಎನ್ನುತ್ತಾರೆ. ಉದಾಹರಣೆಗೆ ಬ್ರಹ್ಮಚರ್ಯಪಾಲನೆ, ವೃತಾನುಷ್ಠಾನ, ಇತ್ಯಾದಿ.

ಯೋಗಯಜ್ಞ: ಅಂದರೆ ವಿಧವಿಧವಾದ ಕರ್ಮಯೋಗವನ್ನು ಭಗವಂತನ ಪ್ರೀತ್ಯರ್ಥ ಅನುಷ್ಠಾನ ಮಾಡುವುದು. ಇದು ಬಾಹ್ಯ ಕರ್ಮಗಳ ಮೂಲಕ ಭಗವಂತನ ಆರಾಧನೆ. ಉದಾಹರಣೆಗೆ: ದೇವರಿಗೆ 108 ಪ್ರದಕ್ಷಿಣೆ, ಅರ್ಚನೆ , ಇತ್ಯಾದಿ. ಇದಲ್ಲದೆ ಯೋಗ ಶಾಸ್ತ್ರದಲ್ಲಿ ಹೇಳಿರುವ ಯಮನಿಯಮನ ಪಾಲನೆ.

ಸ್ವಾಧ್ಯಾಯ ಜ್ಞಾನಯಜ್ಞ: ಇದು ಭಗವಂತನಿಗೆ ಅತ್ಯಂತ ಪ್ರಿಯವಾದ ಯಜ್ಞ. ಇಲ್ಲಿ ಸ್ವಾಧ್ಯಾಯ ಎನ್ನುವುದಕ್ಕೆ ಅನೇಕ ಅರ್ಥಗಳಿವೆ. ತನಗೆ ಸಂಬಂಧಪಟ್ಟದ್ದನ್ನು, ತಾನು ಓದಬೇಕಾದುದನ್ನು ಓದುವುದು. ತನ್ನ ಶಾಖೆಯ ವೇದಾಧ್ಯಯನ; ಎಲ್ಲಾ ಕಡೆ ಸ್ವತಂತ್ರನಾಗಿರುವ ಸರ್ವೋತ್ತಮನಾದ ಭಗವಂತನ ಗುಣವನ್ನು ಅಧ್ಯಯನ ಮೂಲಕ ಎಲ್ಲಾ ಗ್ರಂಥಗಳಲ್ಲಿ ಕಂಡುಕೊಳ್ಳುವುದು ಸ್ವಾಧ್ಯಾಯ. ಈ ಕಾಲದಲ್ಲಿ ಶಾಸ್ತ್ರದ ರಹಸ್ಯವನ್ನು ತಿಳಿದವರು ಸಿಗುವುದು ತುಂಬಾ ವಿರಳ. ಅಂತಹ ಸಂದರ್ಭದಲ್ಲಿ ಕಾಲವನ್ನು ವ್ಯರ್ಥ ಮಾಡದೇ, ಭಗವಂತ ಎಷ್ಟು ಬುದ್ಧಿ ಕೊಟ್ಟಿದ್ದಾನೋ ಅಷ್ಟನ್ನು ಬಳಸಿ ಸ್ವಂತ ಎಷ್ಟು ಸಾಧ್ಯವೋ ಅಷ್ಟನ್ನು ಅಧ್ಯಯನ ಮಾಡುವುದೂ ಸ್ವಾಧ್ಯಾಯ. ಈ ಎಲ್ಲಾ ಸ್ವಾಧ್ಯಾಯ ನಮ್ಮ ಜ್ಞಾನದ ಬೆಳವಣಿಗೆಗೆ ಪೋಷಕವಾದದ್ದು. ನಾವು ತಿಳಿಯುವುದು, ತಿಳಿದದ್ದನ್ನು ಇನ್ನೊಬ್ಬರಿಗೆ ಹಂಚುವುದು ಭಗವಂತನಿಗೆ ಅತ್ಯಂತ ಪ್ರಿಯ. ಇನ್ನೊಬ್ಬರಿಗೆ ಹಂಚುವುದರಿಂದ ಹೆಚ್ಚಾಗುವ ಏಕಮೇವ ಸಂಪತ್ತು ಎಂದರೆ ಅದು ಜ್ಞಾನ. ಜ್ಞಾನಯಜ್ಞ ಮಾಡಬೇಕಾದರೆ ನಾವು ಯತಿಗಳಾಗಬೇಕು. ಇಲ್ಲಿ ಯತಿ ಎಂದರೆ ಸನ್ಯಾಸಿ ಅಲ್ಲ. ಯತಿ ಅಂದರೆ ನಿರಂತರ ಪ್ರಯತ್ನಶೀಲ. ಸಾಧನೆ ಜೊತೆಗೆ ಹರಿತವಾದ ವೃತ ಕೂಡಾ ಅಗತ್ಯ. ಅಂದರೆ ಸ್ವಚ್ಛವಾದ ಪ್ರಾಮಾಣಿಕವಾದ ಬದುಕು. ಇದಿಲ್ಲದೇ ಮಾಡುವ ಯಾವ ಕರ್ಮ ಕೂಡಾ ಯಜ್ಞವಾಗುವುದಿಲ್ಲ. ಅಧ್ಯಾತ್ಮದ ದಾರಿಯಲ್ಲಿ ಮುಂದೆ ಸಾಗಲು ಛಲ ಅಗತ್ಯ.

ಅಪಾನೇ ಜುಹ್ವತಿ ಪ್ರಾಣಂ ಪ್ರಾಣೇऽಪಾನಂ ತಥಾऽಪರೇ ।
ಪ್ರಾಣಾಪಾನಗತೀ ರುದ್ಧ್ವಾ ಪ್ರಾಣಾಯಾಮಪರಾಯಣಾಃ ॥೨೯॥

ಅಪಾನೇ ಜುಹ್ವತಿ ಪ್ರಾಣಮ್ ಪ್ರಾಣೇ ಅಪಾನಮ್ ತಥಾ ಅಪರೇ ।
ಪ್ರಾಣ ಅಪಾನ ಗತೀ ರುದ್ಧ್ವಾ ಪ್ರಾಣಾಯಾಮ ಪರಾಯಣಾಃ -ಮತ್ತೆ ಕೆಲವರು ಪ್ರಾಣಾಯಾಮದ ಸಾಧಕರು. ಪ್ರಾಣಾಪಾನಗಳ ನಡೆಯನ್ನು ತಡೆಹಿಡಿದು ಅಪಾನದಲ್ಲಿ ಪ್ರಾಣವನ್ನು ಹೋಮಿಸುತ್ತಾರೆ. ಪ್ರಾಣದಲ್ಲಿ ಅಪಾನವನ್ನು.

ಯೋಗದಲ್ಲಿ ವಿಶಿಷ್ಟವಾದ ಸಾಧನೆ ಪ್ರಾಣಯಾಮ. ಕೆಲವರಿಗೆ ಪ್ರಾಣಾಯಾಮವೇ ಬದುಕಿನಲ್ಲಿ ಒಂದು ಸಾಧನೆ. ಪ್ರಾಣಾಪಾನಗಳನ್ನು ಭಗವಂತನಲ್ಲಿ ಯಜ್ಞ ರೂಪವಾಗಿ ಅರ್ಪಿಸಿ, ಪ್ರಾಣಾಯಾಮದಿಂದ ಭಗಂತನ ಉಪಾಸನೆ- ಅಪಾನದಲ್ಲಿ ಪ್ರಾಣವನ್ನು ಹೋಮಿಸುವುದು. ಇದು ಕುಂಭಕಕ್ಕೆ ಸಂಬಂಧಪಟ್ಟದ್ದು. ದೇಹದ ಒಳಗಿನಿಂದ ಶ್ವಾಸವನ್ನು ಹೊರಬಿಡುವುದು 'ರೇಚಕ'; ಆಮ್ಲಜನಕಯುಕ್ತ ಶುದ್ಧ ಗಾಳಿಯನ್ನು ಒಳಗೆ ತೆಗೆದುಕೊಳ್ಳುವುದು 'ಪೂರಕ'. ನಮ್ಮ ಹೃದಯ ಕಲಶದಲ್ಲಿ ಪ್ರಾಣಶಕ್ತಿಯನ್ನು ಹಿಡಿದಿಡುವುದು-'ಕುಂಭಕ'. ಇದು ಬಹಳ ಪರಿಣಾಮಕಾರಿ.

ಇದರಿಂದ ಏಕಾಗ್ರತೆ, ಆರೋಗ್ಯ, ಆಯುಸ್ಸು ಹೆಚ್ಚುತ್ತದೆ. ಸಾಮಾನ್ಯವಾಗಿ ಒಬ್ಬ ಮನುಷ್ಯನ ಆಯುಸ್ಸು ಆತನ ಉಸಿರಾಟದ ಮೇಲೆ ನಿರ್ಧಾರವಾಗಿರುತ್ತದೆ. ಸಹಜ ಉಸಿರಾಟ ಎಂದರೆ ನಾಲ್ಕು ಸೆಕೆಂಡಿಗೆ ಒಂದು ಉಸಿರಾಟ(ರೇಚಕ ಮತ್ತು ಪೂರಕ). ಒಬ್ಬ ಮನುಷ್ಯ ನೂರು ವರ್ಷ ಬದುಕುತ್ತಾನೆ ಎಂದರೆ ಆತನ ಆಯುಸ್ಸು '೭೭ ಕೋಟಿ, ೭೬ ಲಕ್ಷ ಉಸಿರು'. ಒಂದು ವೇಳೆ ನಾಲ್ಕು ಸೆಕೆಂಡಿಗೆ ಬದಲಾಗಿ ೮ ಸೆಕೆಂಡಿಗೊಮ್ಮೆ ಉಸಿರಾಟ ಮಾಡಿದರೆ ಆತ ೨೦೦ ವರ್ಷ ಬದುಕಬಹುದು. ಇದನ್ನು ಹಿಂದೆ ಕೆಲವು ಸಾಧಕರು ಪ್ರಾಣಾಯಾಮದಿಂದ ಸಾಧಿಸುತ್ತಿದ್ದರು. ಇಂದೂ ಕೂಡಾ ಹಿಮಾಲಯದಲ್ಲಿ ನೂರಾರು ವರ್ಷ ವಯಸ್ಸಾಗಿರುವ ಆರೋಗ್ಯಪೂರ್ಣ ಸಾಧಕರಿದ್ದಾರೆ ಎಂದು ಪರಮಹಂಸ ಯೋಗನಂದರು(Autobiography of Yogi) ಮತ್ತು ಸ್ವಾಮಿರಾಮ್(Living with Himalayan Masters) ತಮ್ಮ ಸ್ವಂತ ಅನುಭವದಿಂದ ಹೇಳಿದ್ದಾರೆ.

ಪ್ರಾಣಾಯಾಮದಿಂದ ಪ್ರಾಣಶಕ್ತಿ ವೃದ್ಧಿಗೊಳ್ಳುತ್ತದೆ. ಇದರಿಂದ ಇನ್ನೊಬ್ಬರ ರೋಗವನ್ನು ಕೂಡಾ ಗುಣಪಡಿಸಬಹುದು. ಇದನ್ನು ಸ್ಪರ್ಶ ಅಥವಾ Touch Heal ಎನ್ನುತ್ತಾರೆ. ಕೇವಲ ಹಸ್ತ ಸ್ಪರ್ಶದಿಂದ ಭಯ, ರೋಗ, ದುಃಖ, ಹುಚ್ಚು, ಕುರುಡುತನ ಎಲ್ಲವನ್ನೂ ಗುಣ ಪಡಿಸಬಹುದು. ಈ ಕಾರಣಕ್ಕಾಗಿ ಒಬ್ಬರು ಇನ್ನೊಬ್ಬರಿಗೆ ಆಶೀರ್ವಾದ ಮಾಡುವಾಗ ತಲೆ ಮೇಲೆ ಕೈ ಇಟ್ಟು ಮಾಡುತ್ತಾರೆ. ಇದರಿಂದ ಪ್ರಾಣ ಶಕ್ತಿ ದೊಡ್ಡವರಿಂದ ಚಿಕ್ಕವರಿಗೆ ಹರಿಯುತ್ತದೆ. ಹೀಗೆ ಪ್ರಣಾಯಾಮದಲ್ಲಿ ಅನೇಕ ಸಾಧನೆ ಸಾಧ್ಯ. ಮುಖ್ಯವಾಗಿ ಇದರಿಂದ ಮನಸ್ಸು ದೇವರಲ್ಲಿ ನೆಲೆಗೊಳ್ಳುತ್ತದೆ. ಕೃಷ್ಣ ಇದನ್ನು ಯಜ್ಞ ಎನ್ನುತ್ತಾನೆ.

ಮೇಲಿನಿಂದ ಕೆಳಕ್ಕೆ ಹರಿಯುವ ಶಕ್ತಿ ಅಪಾನ, ಊರ್ಧ್ವ ಮುಖವಾಗಿ ಮೂಲಾಧಾರದಿಂದ ಸಹಸ್ರಾರದತ್ತ ಹರಿಯುವ ಶಕ್ತಿ ಪ್ರಾಣ. ಈ ಎರಡು ಶಕ್ತಿಗಳನ್ನು ಹೃದಯದಲ್ಲಿ ಸ್ಥಗಿತ ಮಾಡುವುದು ಕುಂಭಕ. ಪೂರ್ಣವಾಗಿ ಒಳಗಿನ ಗಾಳಿಯನ್ನು ತನ್ನ ಬಲ ಮೂಗಿನ ಹೊರಳೆಯಿಂದ ಹೊರ ಹಾಕಿ, ತನ್ನ ಎಡ ಮೂಗಿನ ಹೊರಳೆಯಿಂದ ಶುದ್ಧ ಗಾಳಿಯನ್ನು ಇನ್ನು ಒಳಗೆ ಹೋಗುವುದಿಲ್ಲ ಅನ್ನುವಷ್ಟು ಪ್ರಮಾಣದಲ್ಲಿ ತೆಗೆದುಕೊಂಡು, ಪ್ರಾಣಶಕ್ತಿ ಮೇಲಕ್ಕೆ ಹೋಗದಂತೆ, ಅಪಾನ ಕೆಳಗೆ ಹೋಗದಂತೆ ಶಕ್ತಿಯನ್ನು ಹೃದಯದಲ್ಲಿ ಸ್ಥಗಿತ ಗೊಳಿಸುವುದು- ಕುಂಭಕ. ಇದು ಪ್ರಾಣಾಯಾಮ ಪರಾಯಣರು ಮಾಡುವ ಯಜ್ಞ. ಭಗವಂತ ಪ್ರಸನ್ನನಾಗಿ ನನಗೆ ಏಕಾಗ್ರತೆಯನ್ನು ಕೊಟ್ಟು, ನನ್ನ ಸಾಧನೆಯನ್ನು ಮುಂದುವರಿಸಲು ಸಹಕರಿಸಲಿ ಎನ್ನುವ ಅನುಸಂಧಾನದಿಂದ ಮಾಡುವ ಉಸಿರಾಟದ ಯಜ್ಞ. [ಸೂಚನೆ:ಗುರುವಿನ ಮಾರ್ಗದರ್ಶನವಿಲ್ಲದೆ ಪ್ರಾಣಾಯಾಮವನ್ನು ಪ್ರಯತ್ನಿಸಬಾರದು]

ಅಪರೇ ನಿಯತ ಆಹಾರಾಃ ಪ್ರಾಣಾನ್ ಪ್ರಾಣೇಷು ಜುಹ್ವತಿ ।
ಸರ್ವೇSಪ್ಯೇತೇ ಯಜ್ಞವಿದೋ ಯಜ್ಞಕ್ಷಪಿತಕಲ್ಮಷಾಃ ॥೩೦॥

ಅಪರೇ ನಿಯತ ಆಹಾರಾಃ ಪ್ರಾಣಾನ್ ಪ್ರಾಣೇಷು ಜುಹ್ವತಿ |

ಸರ್ವೇ ಅಪಿ ಏತೇ ಯಜ್ಞವಿದಃ ಯಜ್ಞಕ್ಷಪಿತ ಕಲ್ಮಷಾಃ -ಕೆಲವರು ಆಹಾರವನ್ನು ಮಿತಗೊಳಿಸಿ ಇಂದ್ರಿಯವೃತ್ತಿಗಳನ್ನು ಇಂದ್ರಿಯಗಳಲ್ಲಿ ಹೋಮಿಸುತ್ತಾರೆ.[ಕಿರಿಯರಾದ ಇಂದ್ರಿಯ ದೇವತೆಗಳು ಹಿರಿಯರಾದ ಇಂದ್ರಿಯ ದೇವತೆಗಳಿಗೆ ಅಧೀನರೆಂದು ಚಿಂತನೆ ಮಾಡುತ್ತಾರೆ] ಇವರೆಲ್ಲರೂ ಯಜ್ಞದ ಬಗೆಯನ್ನು ಬಲ್ಲವರು; ಯಜ್ಞದಿಂದ ಕೊಳೆಯನ್ನು ತೊಳೆದುಕೊಂಡವರು.

ಕೆಲವರು ಆಹಾರ ನಿಯಂತ್ರಣಗೊಳಿಸಿ, ಇಂದ್ರಿಯ ಚಾಪಲವನ್ನು ಕಡಿಮೆ ಮಾಡಿಕೊಂಡು ಸಾಧನೆ ಮಾಡುತ್ತಾರೆ. ಆಹಾರ ನಿಯಂತ್ರಣ ಎಂದರೆ ಹೆಚ್ಚು ಆಹಾರ ಸೇವಿಸದೇ ಇರುವುದು, ಉಪ್ಪು-ಹುಳಿ-ಖಾರ ಕಡಿಮೆ ತಿನ್ನುವುದು ಇತ್ಯಾದಿ. ಇದರಿಂದ ಇಂದ್ರಿಯ ಸೆಳೆತ ಕಡಿಮೆಯಾಗುತ್ತದೆ. ಇದರ ಪರಿಣಾಮ ನೇರವಾಗಿ ಮನಸ್ಸಿನ ಮೇಲೆ. ಹೀಗೆ ಆಹಾರ ನಿಯಂತ್ರಣದ ಮೂಲಕ ಸಾಧನೆ ಒಂದು ಯಜ್ಞ. ಈ ಕಾರಣಕ್ಕಾಗಿ ನಮ್ಮಲ್ಲಿ ಅನೇಕ ಹಬ್ಬ ಹರಿದಿನಗಳಲ್ಲಿ, ಏಕಾದಶಿಯಂದು-ಉಪವಾಸ ಪದ್ಧತಿ ಸಾಮಾಜಿಕವಾಗಿ ನೆಡೆದು ಬಂತು. ಇದರಿಂದ ಕನಿಷ್ಠ ಆ ಒಂದು ದಿನವಾದರೂ ಮನಸ್ಸು ಸ್ವಚ್ಛವಾಗಿ ಭಗವಂತನ ಉಪಾಸನೆಯಲ್ಲಿ ತೊಡಗಲಿ ಎನ್ನುವುದು ಇದರ ಹಿಂದಿನ ಸಂಕಲ್ಪ.

ಇನ್ನೊಂದು ವಿಧವಾದ ಯಜ್ಞ "ಪ್ರಾಣಾನ್ ಪ್ರಾಣೇಷು ಜುಹ್ವತಿ" ಅಂದರೆ ಪ್ರಾಣಗಳಲ್ಲಿ ಪ್ರಾಣವನ್ನು ಹೋಮಿಸುವುದು ಅಥವಾ ಇಂದ್ರಿಯಗಳಲ್ಲಿ ಇಂದ್ರಿಯವನ್ನು ಹೋಮಿಸುವುದು. ಇಲ್ಲಿ ಇಂದ್ರಿಯಗಳು ಎಂದರೆ ಇಂದ್ರಿಯಾಭಿಮಾನಿ ದೇವತೆಗಳು. ನಮ್ಮ ಪ್ರತಿಯೊಂದು ಇಂದ್ರಿಯಕ್ಕೂ ಒಬ್ಬ ಅಭಿಮಾನಿ ದೇವತೆ ಇದ್ದಾನೆ. ಈ ದೇವತೆಗಳು ಒಂದೊಂದು ಸ್ತರದಲ್ಲಿ ಕೆಲಸ ಮಾಡುತ್ತಾರೆ(**Protocol**). ಒಬ್ಬೊಬ್ಬ ದೇವತೆಯೂ ಒಂದೊಂದು ಮೆಟ್ಟಲಿನಲ್ಲಿ ನಿಂತು ಕಾರ್ಯ ನಿರ್ವಹಿಸುತ್ತಿರುತ್ತಾರೆ ಹಾಗೂ ಇವರು ಭಗವಂತನನ್ನು ಸೇರುವಲ್ಲಿ ನಮಗೆ ಸಹಾಯ ಮಾಡುತ್ತಾರೆ. ಈ ದೇವತೆಗಳನ್ನು ವಿವಿಧ ಮೆಟ್ಟಲಿನಲ್ಲಿ ತಾರತಮ್ಯ ಚಿಂತನೆ ಮಾಡುವುದು, ಅದರ ಮುಖೇನ ಭಗವಂತನ ಚಿಂತನೆ ಒಂದು ಯಜ್ಞ. ಸರ್ವೋತ್ತಮನಾದ ಭಗವಂತ ಮೊದಲಿನವನು. ಎಲ್ಲವೂ ಅವನ ಅಧೀನ. ಆತನ ನಂತರ ಪ್ರಕೃತಿ ಮಾತೆ ಲಕ್ಷ್ಮಿ, ನಂತರ ಬ್ರಹ್ಮ-ವಾಯು, ಸರಸ್ವತಿ-ಭಾರತಿ, ಗರುಡ-ಶೇಷ-ರುದ್ರ, ಸುಪರ್ಣಿ-ವಾರುಣಿ-ಪಾರ್ವತಿ, ಇಂದ್ರ-ಕಾಮರು, ದಕ್ಷಾದಿಗಳು, ಸೂರ್ಯ-ಚಂದ್ರ-ಯಮಾದಿಗಳು, ವರುಣ, ಅಗ್ನಿ, ಅಶ್ವೀದೇವತೆಗಳು, ಕುಬೇರ, ಯಜ್ಞ. ಹೀಗೆ ಒಬ್ಬರು ಇನ್ನೊಬ್ಬರಿಗೆ ಅಧೀನವಾಗಿ ವಿವಿಧ ಮೆಟ್ಟಲಿನಲ್ಲಿ ಕಾರ್ಯ ನಿರ್ವಹಿಸುತ್ತಿರುತ್ತಾರೆ. ಈ ರೀತಿ ದೇಹ ಎನ್ನುವ ಈ ಅದ್ಭುತ ಯಂತ್ರವನ್ನು ನಿಯಂತ್ರಿಸುವ ದೇವತೆಗಳ ಅರಿವು, ಅದರ ಮೂಲಕ ಭಗವಂತನೆಡೆಗೆ ಸಾಗುವ ಜ್ಞಾನಸಾಧನೆ-ತಾರತಮ್ಯ ಜ್ಞಾನಯಜ್ಞ.

ಯಜ್ಞದಲ್ಲಿ ಒಂದು ಒಳ್ಳೆಯದು ಒಂದು ಕೆಟ್ಟದ್ದು ಅನ್ನುವುದಿಲ್ಲ. ಯಾರಿಗೆ ಯಾವ ಯಜ್ಞ ಒಗ್ಗುತ್ತದೋ ಅದರ ಮುಖೇನ ಸಾಧನೆ ಮಾಡುತ್ತಾರೆ. ಎಲ್ಲರೂ ಎಲ್ಲವನ್ನೂ ಮಾಡಲು ಸಾಧ್ಯವಿಲ್ಲ. ಯಾರಿಗೆ ಯಾವುದು ಹಿತವೆನಿಸುತ್ತದೋ, ಸಾಧನೆಗೆ ಅನುಕೂಲವಾಗುತ್ತದೋ, ಆ ದಾರಿಯಲ್ಲಿ ಸಾಗಬೇಕು. ಯಜ್ಞದಿಂದ ಆರಾಧ್ಯನಾದ ಯಜ್ಞಮೂರ್ತಿಯಾದ ಭಗವಂತನತ್ತ ಸಾಗುವವನು, ತನ್ನ ಜೀವನದ ಪ್ರತಿಯೊಂದು ನಡೆಯನ್ನು ಭಗವಂತನ ಆರಾಧನೆಯಾಗಿ ಮಾಡಿಕೊಳ್ಳುವ ಮೂಲಕ, ತನ್ನ ಬದುಕಿನ ಕಲ್ಮಶವನ್ನು ತೊಳೆದುಕೊಂಡು ಸ್ವಚ್ಛವಾದ ಬದುಕನ್ನು ಬಾಳುತ್ತಾನೆ.

ಯಜ್ಞಶಿಷ್ಟಾಮೃತಭುಜೋ ಯಾಂತಿ ಬ್ರಹ್ಮ ಸನಾತನಮ್ ।
ನಾಯಂ ಲೋಕೋಽಸ್ತ್ಯಯಜ್ಞಸ್ಯ ಕುತೋಽನ್ಯಃ ಕುರುಸತ್ತಮ ॥೩೧॥

ಯಜ್ಞ ಶಿಷ್ಟ ಅಮೃತ ಭುಜಃ ಯಾಂತಿ ಬ್ರಹ್ಮ ಸನಾತನಮ್ ।
ನ ಅಯಮ್ ಲೋಕಃ ಅಸ್ತಿ ಅಯಜ್ಞಸ್ಯ ಕುತಃ ಅನ್ಯಃ ಕುರುಸತ್ತಮ -- ಯಜ್ಞದಲ್ಲಿ ಅರ್ಪಿಸಿ ಉಳಿದ ಅಮೃತವನ್ನುಣ್ಣುವವರು(ಯಜ್ಞ ಫಲದ ಅಮೃತ) ಶಾಶ್ವತವಾದ ಭಗವಂತನನ್ನು ಪಡೆಯುತ್ತಾರೆ. ಓ ಕುರುಶ್ರೇಷ್ಠಾ, ಯಜ್ಞವಿರದವನಿಗೆ ಈ ಲೋಕವೇ ಇಲ್ಲ. ಆ ಲೋಕದ ಮಾತೇನು?

ಯಜ್ಞದಲ್ಲಿ ಭಗವಂತನಿಗೆ ಅರ್ಪಿಸಿ ಉಳಿದದ್ದನ್ನು 'ಅಮೃತ' ಎನ್ನುತ್ತಾರೆ. ಅದು ನಮ್ಮನ್ನು ಸಾವಿನಿಂದಾಚೆಗೆ ಕೊಂಡೊಯ್ಯುತ್ತದೆ. ಜೀವನದ ಪ್ರತಿಯೊಂದು ನಡೆಯಲ್ಲಿ ಈ ರೀತಿಯ ಬದುಕನ್ನು ಬದುಕುತ್ತಿದ್ದರೆ ಕ್ರಮೇಣ ಎಂದೆಂದೂ ಬದಲಾಗದ, ಶಾಶ್ವತ ಮತ್ತು ಸನಾತನನಾದ ಭಗವಂತನನ್ನು ಹೋಗಿ ಸೇರುತ್ತೇವೆ.
ಇಲ್ಲಿ 'ಸನಾತನ' ಎನ್ನುವಲ್ಲಿ ಇನ್ನೊಂದು ಧ್ವನಿ ಇದೆ. ಕೇವಲ ಉಪವಾಸ ಪ್ರಾಣಾಯಾಮ ಮಾಡಿದಾಗ ಮೋಕ್ಷ ಸಿಗದು. ಸನಾತನ(ನಾತನ-ನಾದನ) ಅಂದರೆ ಶಬ್ದ. ಬ್ರಹ್ಮ ಸನಾತನ ಎಂದರೆ ಸರ್ವಶಬ್ದ ವಾಚ್ಯನಾದ, ವೇದವೇದ್ಯ ಭಗವಂತ. ಇಂತಹ ಭಗವಂತನನ್ನು ಶಾಸ್ತ್ರದ ಮುಖೇನ ತಿಳಿದುಮಾಡುವ ಯಜ್ಞದಿಂದ ಮೋಕ್ಷ ಸಾಧ್ಯ. ಇಲ್ಲದಿದ್ದರೆ ಏನೂ ಉಪಯೋಗವಿಲ್ಲ. ವೇದದಲ್ಲಿ ಹೇಳಿರುವ ಗುಣವನ್ನು ಬಲ್ಲವರಿಂದ ತಿಳಿದು ಉಪಾಸನೆ ಮಾಡುವವ, ವೇದವನ್ನು ಓದಿ ಅದರಿಂದ ತಿಳಿದವ, ತಿಳಿದು ಇನ್ನೊಬ್ಬರಿಗೆ ಹೇಳುವವ, ಹೀಗೆ ಎಲ್ಲರೂ ಸಾಧಕರೆನಿಸುತ್ತಾರೆ. ಯಜ್ಞದಲ್ಲಿ ಪ್ರಮುಖವಾಗಿ ಬೇಕಾಗಿರುವುದು ಜ್ಞಾನ, ಅನನ್ಯ ಭಕ್ತಿ ಮತ್ತು ಶರಣಾಗತಿ. "ಜೀವನದಲ್ಲಿ ಈ ಅನುಸಂಧಾನವಿಲ್ಲದವ, ಯಜ್ಞವನ್ನು ಬದುಕಿನಲ್ಲಿ ಅಳವಡಿಸಿಕೊಳ್ಳದವ, ಇಹದಲ್ಲೂ ವ್ಯರ್ಥವಾಗಿ ಬದುಕುತ್ತಾನೆ-ಇನ್ನು ಪರದ ಮಾತೇನು" ಎನ್ನುತ್ತಾನೆ ಕೃಷ್ಣ.
ಇಲ್ಲಿ ಅರ್ಜುನನನ್ನು ಕೃಷ್ಣ 'ಕುರುಸತ್ತಮ' ಎಂದು ಸಂಬೋಧಿಸಿದ್ದಾನೆ. ಕುರುವಂಶದಲ್ಲಿ ಶ್ರೇಷ್ಠನಾದ ನೀನು ನಿಷ್ಕ್ರೀಯನಾಗದೇ ಕಾರ್ಯ ಪ್ರವೃತ್ತನಾಗು; ಯಜ್ಞದಲ್ಲಿ ತಮ್ಮನ್ನು ತೊಡಗಿಸಿಕೊಂಡು ಬಂದ ವಂಶದಲ್ಲಿ ಹುಟ್ಟಿದ ಜ್ಞಾನಿಶ್ರೇಷ್ಠ, ಸಾತ್ವಿಕನಾದ ನೀನು- 'ಯುದ್ಧವನ್ನು ಯಜ್ಞವಾಗಿ ಮಾಡು' ಎನ್ನುವ ಧ್ವನಿ ಈ ಸಂಬೋಧನೆಯಲ್ಲಿದೆ.

ಏವಂ ಬಹುವಿಧಾ ಯಜ್ಞಾ ವಿತತಾ ಬ್ರಹ್ಮಣೋ ಮುಖೇ ।
ಕರ್ಮಜಾನ್ ವಿದ್ಧಿ ತಾನ್ ಸರ್ವಾನೇವಂ ಜ್ಞಾತ್ವಾ ವಿಮೋಕ್ಷ್ಯಸೇ ॥೩೨॥

ಏವಮ್ ಬಹುವಿಧಾಃ ಯಜ್ಞಾಃ ವಿತತಾಃ ಬ್ರಹ್ಮಣಃ ಮುಖೇ
ಕರ್ಮಜಾನ್ ವಿದ್ಧಿ ತಾನ್ ಸರ್ವಾನ್ ಏವಮ್ ಜ್ಞಾತ್ವಾ ವಿಮೋಕ್ಷ್ಯಸೇ- ಹೀಗೆ ಹಲವು ಬಗೆಯ ಯಜ್ಞಗಳು ಭಗವಂತನ ಬಾಯಲ್ಲಿ ಹರವಿಕೊಂಡಿವೆ. ಅವೆಲ್ಲವೂ ಕರ್ಮದಿಂದಲೇ ಆಗುವಂತವು ಎನ್ನುವುದನ್ನು ತಿಳಿ. ಹೀಗೆ ತಿಳಿದರೆ ಬಿಡುಗಡೆ ಹೊಂದುವೆ.

ಯಜ್ಞ ಅನ್ನುವುದಕ್ಕೆ ಹಲವು ಮುಖ. ಬದುಕಿನ ಯಾವುದೇ ನಡೆಯನ್ನು ಭಗವಂತನ ಪ್ರಜ್ಞೆಯಿಂದ ಮಾಡಿದಾಗ, ಬದುಕಿನ ನಡೆ ಭಗವಂತನ ಕಡೆ ಸಾಗುವ ನಡೆಯಾದಾಗ, ಅದು ಯಜ್ಞವಾಗುತ್ತದೆ. ಯಾವ ರೀತಿ ಯಜ್ಞ

ಮಾಡಿದರೂ ಅದು ಭಗವಂತನ ಮುಖದಲ್ಲೇ ಬಂದು ಸೇರುತ್ತದೆ. ಸರ್ವಯಜ್ಞಗಳ ನಿಯಾಮಕ ಆ ಭಗವಂತನೊಬ್ಬನೇ. ವೈವಿಧ್ಯತೆ ಕೇವಲ ನಮ್ಮ ಅನುಸಂಧಾನ ಮತ್ತು ಕ್ರಿಯೆಯಲ್ಲಿ.

ನಾವು ನಮ್ಮ ಕರ್ಮದ ಮುಖೇನ ಯಜ್ಞ ಮಾಡಬೇಕು. ಕರ್ಮವನ್ನು ಬಿಟ್ಟು ಭಗವಂತನ ಉಪಾಸನೆ ಮಾಡುತ್ತೇನೆ ಎಂದು ಹೊರಟರೆ ಅದು ಸಾಧ್ಯವಿಲ್ಲ. ನಾವು ನಮ್ಮನಮ್ಮ ಕರ್ತವ್ಯ ಕರ್ಮದಲ್ಲಿ ಭಗವಂತನನ್ನು ಕಾಣುವುದು ಯಜ್ಞ. ಈ ಅನುಸಂಧಾನದಿಂದ ಯಾವ ಕರ್ಮ ಮಾಡಿದರೂ ಅದು ನಮ್ಮನ್ನು ಬಿಡುಗಡೆಯ ಮಾರ್ಗದತ್ತ ಕೊಂಡೊಯ್ಯುತ್ತದೆ.

ಈವರೆಗೆ ಕೃಷ್ಣ ಕರ್ಮ-ಯಜ್ಞವಾಗುವುದು ಹೇಗೆ, ಅದರಲ್ಲಿನ ವಿಧ, ಅದರ ಸ್ವಾಮಿ- ಈ ವಿಚಾರವನ್ನು ವಿವರವಾಗಿ ಹೇಳಿದ. ಮೂಲಭೂತವಾಗಿ ಯಜ್ಞದಲ್ಲಿ ಬಾಹ್ಯ ಮತ್ತು ಅಂತರಂಗ ಯಜ್ಞ ಎನ್ನುವುದನ್ನೂ ನಾವು ನೋಡಿದೆವು. ಈ ಎರಡು ವಿಧವಾದ ಯಜ್ಞದಲ್ಲಿ ಯಾವುದಕ್ಕೆ ಹೆಚ್ಚು ಮಹತ್ವ ಮತ್ತು ಏಕೆ-ಈ ಕುರಿತು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಶ್ರೇಯಾನ್ ದ್ರವ್ಯಮಯಾದ್ ಯಜ್ಞಾಜ್ ಜ್ಞಾನಯಜ್ಞಃ ಪರಂತಪ ।
ಸರ್ವಂ ಕರ್ಮಾ[ಽ]ಖಿಲಂ ಪಾರ್ಥ ಜ್ಞಾನೇ ಪರಿಸಮಾಪ್ಯತೇ ॥೩೩॥

ಶ್ರೇಯಾನ್ ದ್ರವ್ಯ ಮಯಾತ್ ಯಜ್ಞಾತ್ ಜ್ಞಾನಯಜ್ಞಃ ಪರಂತಪ |

ಸರ್ವಮ್ ಕರ್ಮಾ ಅ[ಆ]ಖಿಲಮ್ ಪಾರ್ಥ ಜ್ಞಾನೇ ಪರಿಸಮಾಪ್ಯತೇ- ಓ ಪರಂತಪಾ, ಸೊತ್ತುಗಳನ್ನು ಹೋಮಿಸುವ ಬಾಹ್ಯ ಯಜ್ಞಕ್ಕಿಂತ ಜ್ಞಾನ ಯಜ್ಞ ಮಿಗಿಲು. ಓ ಪಾರ್ಥಾ, ಸಾಂಗವಾದ [ತಿಳಿವಿನೆದುರು ತೀರಾ ಸಣ್ಣದಾದ] ಎಲ್ಲಾ ಕರ್ಮವೂ ತಿಳಿವಿನಲ್ಲಿ ಪೂರ್ತಿಗೊಳ್ಳುತ್ತದೆ.

ವಾಸ್ತವಿಕವಾಗಿ ಪೂರ್ಣವಾದ ಬರಿಯ ಬಾಹ್ಯಯಜ್ಞ ಮತ್ತು ಬರಿಯ ಅಂತರಂಗ ಯಜ್ಞ ಅನ್ನುವುದೊಂದಿಲ್ಲ. ನಾವು ಮಾಡುವ ಬಾಹ್ಯಯಜ್ಞದ ಹಿಂದೆ ಅರಿವಿದೆ. ಅಂತರಂಗ ಯಜ್ಞದ ಜೊತೆಗೆ ಆಚರಣೆ ಕೂಡಾ ಇದೆ. ಇವೆರಡರಲ್ಲಿ ಅಂತರಂಗ ಯಜ್ಞಕ್ಕೆ ಹೆಚ್ಚು ಮಹತ್ವ. ಏಕೆಂದರೆ ನಾವು ಮಾನಸಿಕವಾಗಿ ಧ್ಯಾನ ಮಾಡುವುದರಿಂದ ಬಾಹ್ಯಕ್ರಿಯೆ ಇಲ್ಲದೆ ಮನಸ್ಸಿನಲ್ಲಿ ವಿಶೇಷ ಶಕ್ತಿ ನಿರ್ಮಾಣವಾಗುತ್ತದೆ. ಆದರೆ ಅರಿವು ಇಲ್ಲದೇ ಕರ್ಮ ಮಾಡಿದರೆ ಅದು ವ್ಯರ್ಥ! ಈ ಕಾರಣಕ್ಕಾಗಿ ಕರ್ಮದ ಹಿಂದಿನ ಅರಿವು ಬಹಳ ಮುಖ್ಯ. ಹಾಗಾಗಿ ಜ್ಞಾನಪೂರ್ವಕ ನಾವು ಕರ್ಮ ಮಾಡಬೇಕು. ಬರೀ ದ್ರವ್ಯಮಯವಾಗಿ, ಅದರ ಹಿಂದೆ ಜ್ಞಾನ ಇಲ್ಲದೇ ಇದ್ದರೆ, ತಿಳಿದು ಮಾಡದಿದ್ದರೆ, ಅದಕ್ಕೆ ಅರ್ಥವಿಲ್ಲ. ಯಾವ ಕರ್ಮವನ್ನಾಗಲಿ ತಿಳಿದು ಮಾಡಿದಾಗ ಮಾತ್ರ ಪರಿಣಾಮಕಾರಿ. ಈ ಕಾರಣದಿಂದ ಜ್ಞಾನಪರವಾದ ಯಜ್ಞ ಮಹತ್ವದ್ದು. ಈ ಶ್ಲೋಕದಲ್ಲಿ ಕೃಷ್ಣ ಅರ್ಜುನನನ್ನು ಪರಂತಪ ಎಂದು ಸಂಬೋಧಿಸುತ್ತಾನೆ. ಇಲ್ಲಿ ಈ ಸಂಬೋಧನೆಗೆ ವಿಶೇಷ ಅರ್ಥವಿದೆ. ಈ ಪದವನ್ನು ಎರಡು ನೆಲೆಯಲ್ಲಿ ಅರ್ಥೈಸಬಹುದು. ಸ್ಥೂಲವಾಗಿ ನೋಡಿದರೆ ಪರಂತಪ ಎಂದರೆ 'ಶತ್ರುಗಳನ್ನು ಸದೆಬಡಿಯುವ ವೀರ'. ಇಲ್ಲಿ ಅರ್ಜುನ ಮಾಡುತ್ತಿರುವ ಯಜ್ಞ ಶತ್ರುನಿಗ್ರಹ. ಆ ಯಜ್ಞದ ಹಿಂದೆ ಜ್ಞಾನದ ಸಹಕಾರವಿದೆ. ಆದ್ದರಿಂದ ಅದು ಜ್ಞಾನಯಜ್ಞವಾಗುತ್ತದೆ- ದ್ರವ್ಯಯಜ್ಞವಲ್ಲ. ಏಕೆಂದರೆ ಅರ್ಜುನ ಪರಂತಪ-'ಪರಮಾತ್ಮನನ್ನು ಸದಾ ಚಿಂತಿಸುವವನು'. ಇಲ್ಲಿ 'ಅವರು ನನ್ನ

ಶತ್ರುಗಳು, ಅವರನ್ನು ನಿಗ್ರಹಿಸಿ ನಾನು ಅಧಿಕಾರ ಸಾಧಿಸಬೇಕು' ಎನ್ನುವ ಅನುಸಂಧಾನವಿಲ್ಲ. ಇದೊಂದು ಭಗವಂತನ ಆರಾದನಾ ರೂಪವಾದ ಯಜ್ಞ. ಅನ್ಯಾಯದ ವಿರುದ್ಧ ಹೋರಾಟ ಅರ್ಜುನನ ಕರ್ತವ್ಯ, ಜಯಾಪಜಯಗಳು ಆ ಭಗವಂತನಿಗೆ ಬಿಟ್ಟಿದ್ದು. ಈ ಅನುಸಂಧಾನದಿಂದ ಯುದ್ಧ ಮಾಡಿದಾಗ ಅದು ಜ್ಞಾನಯಜ್ಞವಾಗುತ್ತದೆ. ಪರಂತಪ ಎನ್ನುವ ಈ ವಿಶೇಷಣ ಇಲ್ಲಿ ಕರ್ಮವನ್ನು ಜ್ಞಾನವಾಗಿ ಹೇಗೆ ಪರಿವರ್ತಿಸಬಹುದು ಎನ್ನುವುದನ್ನು ಸೂಚಿಸುತ್ತದೆ.

ಇದು ಏಕೆ ಜ್ಞಾನಮಯ ಎನ್ನುವುದನ್ನು ಕೃಷ್ಣ ವಿವರಿಸುತ್ತಾ ಹೇಳುತ್ತಾನೆ: "ಸರ್ವಮ್ ಕರ್ಮಾ ಅ[ಆ]ಖಿಲಮ್ ಪಾರ್ಥ ಜ್ಞಾನೇ ಪರಿಸಮಾಪ್ಯತೇ" ಎಂದು. ಇಲ್ಲಿ 'ಸರ್ವಂ' ಮತ್ತು 'ಅಖಿಲಂ' ಎನ್ನುವ ಪದ ಪುನರುಕ್ತಿ ಇದ್ದಂತೆ ಕಾಣುತ್ತದೆ. ಆದರೆ ಇದರ ಹಿಂದೆ ವಿಶೇಷ ಅರ್ಥವಿದೆ. ಒಂದು ಮಂತ್ರದಲ್ಲಿ ಎಷ್ಟು ಬಗೆಯ ಪದಭೇದ, ಎಷ್ಟು ಬಗೆಯ ಅರ್ಥಾನುಸಂಧಾನ ಎನ್ನುವುದು ಮುಖ್ಯ. ಇಲ್ಲಿ "ಸರ್ವಂ ಕರ್ಮಾ[S]ಖಿಲಂ" ಎನ್ನುವುದನ್ನು ಎರಡು ಬಗೆಯಿಂದ ಪದಭೇದ ಮಾಡಬಹುದು. ಒಂದು- 'ಸರ್ವ ಕರ್ಮ ಅಖಿಲಂ' ಹಾಗೂ ಇನ್ನೊಂದು 'ಸರ್ವ ಕರ್ಮ ಆಖಿಲಂ'. ಎಲ್ಲಾ ಪರಿಕರಗಳಿಂದ ಪರಿಪೂರ್ಣವಾದ ಸರ್ವಕರ್ಮವನ್ನು 'ಸರ್ವ ಕರ್ಮ ಅಖಿಲಂ ಎನ್ನುತ್ತಾರೆ.' ಅಂದರೆ ಪರಿಪೂರ್ಣವಾದ ಎಲ್ಲಾ ಕರ್ಮ. "ಒಂದು ಕರ್ಮವನ್ನು ಪೂರ್ಣವಾಗಿ ಮಾಡು" ಎನ್ನುತ್ತಾನೆ ಕೃಷ್ಣ. ಯಾವುದೇ ಕರ್ಮವನ್ನು ಜ್ಞಾನಪೂರ್ವಕವಾಗಿ ಮಾಡಿದಾಗ ಮಾತ್ರ ಅದು ಪೂರ್ಣವಾಗುತ್ತದೆ. ಕರ್ಮದ ಜೊತೆಗೆ ಜ್ಞಾನ ಬೇಕೇಬೇಕು. ಅದು ಜ್ಞಾನದ ಶ್ರೇಷ್ಠತೆ. ಜ್ಞಾನದಿಂದ ಕರ್ಮ ಮಾಡು; ಕರ್ಮ ಮಾಡಿ ಜ್ಞಾನಗಳಿಸು. ಆಗ ಅದು ಪರಿಪೂರ್ಣ. ಭಾಗವತದಲ್ಲಿ ಜ್ಞಾನವಿಲ್ಲದೇ ಮಾಡುವ ಯಜ್ಞವನ್ನು ಉಗ್ರವಾಗಿ ವಿರೋಧಿಸುತ್ತಾರೆ. ಅಲ್ಲಿ ಹೋಮದಲ್ಲಿ ಕೊಡುವ ಆಹುತಿಯನ್ನು ಏಕೆ ಕೊಡುತ್ತಿದ್ದೇವೆ ಎಂದು ತಿಳಿಯದೇ ಹೋಮ ಮಾಡುವವನು 'ಬೆಂಕಿಗೆ ಮರುಳಾದವನು ಹಾಗೂ ಹೊಗೆ ತಿಂದು ಸಾಯುವವನು' ಎನ್ನುತ್ತಾರೆ. ಕರ್ಮದ ಹಿಂದಿನ ಭಗವಂತನ ಅರಿವು ಬಹಳ ಮುಖ್ಯ. ಇಲ್ಲದಿದ್ದರೆ ಅದು ತೂತು ಬಿದ್ದ ದೋಣಿಯಂತೆ. ಮಾಡಿದ ಕರ್ಮ ಸಫಲವಾಗುವುದು ಅದರ ಹಿಂದೆ ಅರಿವು ಇದ್ದಾಗ ಮಾತ್ರ.

ಇನ್ನೊಂದು ಅರ್ಥದಲ್ಲಿ ಜ್ಞಾನರಹಿತವಾದ ಕೇವಲಕರ್ಮ 'ಆ-ಖಿಲಂ'. ಇಲ್ಲಿ 'ಖಿಲಂ' ಅಂದರೆ ಚೂರು. ಜ್ಞಾನವಿಲ್ಲದ ಎಲ್ಲಾ ಕರ್ಮವನ್ನು ಒಂದುಗೂಡಿಸಿದರೂ ಅದು ಜ್ಞಾನದ ಮುಂದೆ ಒಂದು ಚಿಕ್ಕ ಚೂರು. ಜ್ಞಾನವಿಲ್ಲದ ಎಲ್ಲಾ ಕರ್ಮಗಳು ಸೇರಿದರೂ ಅದು ಜ್ಞಾನಪೂರ್ಣ ಕರ್ಮದ ಮುಂದೆ ಅತ್ಯಲ್ಪ. ನಮ್ಮ ಕರ್ಮ ಜ್ಞಾನಕ್ಕೋಸ್ಕರವಾಗಬೇಕೇ ಹೊರತು ಕರ್ಮಕ್ಕೋಸ್ಕರ ಕರ್ಮ ಮಾಡಬಾರದು. ಆದರೆ ಇಂದಿನ ದಿನದಲ್ಲಿ ಜ್ಞಾನಕ್ಕೋಸ್ಕರ ಕರ್ಮ ಮಾಡುವವರ ಸಂಖ್ಯೆ ಕಡಿಮೆಯಾಗುತ್ತಿರುವುದು ದುಃಖದಾಯಕ.

ಇಲ್ಲಿ ಕೃಷ್ಣ ಅರ್ಜುನನನ್ನು 'ಪಾರ್ಥಾ' ಎಂದು ಸಂಬೋಧಿಸಿದ್ದಾನೆ. ಹಿಂದೆ ಹೇಳಿದಂತೆ ಪಾರ್ಥ ಎಂದರೆ ಪಾರವನ್ನು ಕಂಡವನು, ಜ್ಞಾನದ ಕಡಲಿನ ಆಚೆಯ ದಡವನ್ನು ಕಂಡವನು; ವೇದಾರ್ಥವನ್ನು ಪಾನ ಮಾಡಿದವನು. "ಮಹಾನ್ ಜ್ಞಾನಿಯಾದ ನೀನು ಅರಿತು ಮಾಡುವ ಈ ಕರ್ಮ ಕೇವಲ ಕರ್ಮವಲ್ಲ ಇದು ಜ್ಞಾನಯಜ್ಞ" ಎನ್ನುವ ಧ್ವನಿ ಈ ಸಂಬೋಧನೆಯಲ್ಲಿದೆ. ಇಲ್ಲಿ ನಾವು ಪುನಃ ನೆನಪಿಸಿಕೊಳ್ಳಬೇಕಾದ ವಿಷಯ ಎಂದರೆ ಮೂಲತಃ ಅರ್ಜುನ ಮಹಾನ್ ಜ್ಞಾನಿ. ಆದರೆ ಮಹಾನ್ ಜ್ಞಾನಿಗಳಿಗೂ ಕೂಡಾ ಕೆಲವೊಮ್ಮೆ ಗೊಂದಲವಾಗಿ ಎಲ್ಲವೂ ಮರೆತು ಹೋಗುತ್ತದೆ. ಅರ್ಜುನ ಇಲ್ಲಿ ಆ ಸ್ಥಿತಿಯಲ್ಲಿದ್ದಾನೆ. ಇದು ಕೇವಲ ತಾತ್ಕಾಲಿಕ ಪರದೆ, ಆ ಪರದೆಯನ್ನು ಕೃಷ್ಣ ಸರಿಸುತ್ತಿದ್ದಾನೆ.

ಜ್ಞಾನವಿಲ್ಲದ ಕರ್ಮದಿಂದ ಯಾವ ಉಪಯೋಗವೂ ಇಲ್ಲ ಅನ್ನುವ ವಿಚಾರ ಸ್ಪಷ್ಟವಾಯಿತು. ಆದರೆ ಈ ಜ್ಞಾನವನ್ನು ಗಳಿಸುವ ಪರಿ ಎಂತು? ಈ ಪ್ರಶ್ನೆಗೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರಿಸುತ್ತಾನೆ.

ತದ್ ವಿದ್ಧಿ ಪ್ರಣಿಪಾತೇನ ಪರಿಪ್ರಶ್ನೇನ ಸೇವಯಾ ।
ಉಪದೇಕ್ಷ್ಯಂತಿ ತೇ ಜ್ಞಾನಂ ಜ್ಞಾನಿನಸ್ತತ್ತ್ವದರ್ಶಿನಃ ॥೩೪॥

ಯಜ್ ಜ್ಞಾತ್ವಾ ನ ಪುನರ್ಮೋಹಮೇವಂ ಯಾಸ್ಯಸಿ ಪಾಂಡವ ।
ಯೇನ ಭೂತಾನ್ಯಶೇಷೇಣ ದ್ರಕ್ಷ್ಯಸ್ಯಾತ್ಮನ್ಯಥೋ ಮಯಿ ॥೩೫॥

ತತ್ ವಿದ್ಧಿ ಪ್ರಣಿಪಾತೇನ ಪರಿಪ್ರಶ್ನೇನ ಸೇವಯಾ ।
ಉಪದೇಕ್ಷ್ಯಂತಿ ತೇ ಜ್ಞಾನಮ್ ಜ್ಞಾನಿನಃ ತತ್ತ್ವದರ್ಶಿನಃ ॥
ಯತ್ ಜ್ಞಾತ್ವಾ ನ ಪುನಃ ಮೋಹಮ್ ಏವಮ್ ಯಾಸ್ಯಸಿ ಪಾಂಡವ ।
ಯೇನ ಭೂತಾನಿ ಅಶೇಷೇಣ ದ್ರಕ್ಷ್ಯಸಿ ಆತ್ಮನಿ ಅಥ ಉ ಮಯಿ -- ಪಾಂಡವಾ, ಯಾವುದನ್ನು ತಿಳಿದಾಗ ನೀನು ಮತ್ತೆ ಹೀಗೆ ಮೋಹಗೊಳ್ಳುವುದಿಲ್ಲವೋ; ಯಾವ ಮೋಹವಳಿದದ್ದರಿಂದ ಎಲ್ಲಾ ಜೀವಿಗಳನ್ನು ಅಂತರ್ಯಾಮಿಯಾದ [ಎಲ್ಲೆಲ್ಲೂ ಇರುವ] ನನ್ನಲ್ಲಿ ಕಾಣಬಲ್ಲೆಯೋ, ಅಂತಹ ತಿಳಿವನ್ನು ನಿಜ ಕಂಡು ತಿಳಿದವರು ನಿನಗೆ ತಿಳಿಹೇಳುತ್ತಾರೆ. ಕಾಲಿಗೆರಗಿ, ಪರಿಪರಿಯಿಂದ ಕೇಳಿ, ಸೇವೆಗೈದು ಅದನ್ನು ತಿಳಿದುಕೋ.

ಜ್ಞಾನವನ್ನು ಗಳಿಸಬೇಕಾದರೆ "ನೀನು ಜ್ಞಾನಿಗಳ ಬೆನ್ನುಹತ್ತಬೇಕು; ಸತ್ಯವನ್ನು ಸಾಕ್ಷಾತ್ಕಾರ ಮಾಡಿಕೊಂಡ ತತ್ವದರ್ಶಿಗಳಿಂದ ಜ್ಞಾನವನ್ನು ಪಡೆ ಎನ್ನುತ್ತಾನೆ ಕೃಷ್ಣ. ಜ್ಞಾನ ಎನ್ನುವುದು ಕೇವಲ ಪುಸ್ತಕವನ್ನು ಓದುವುದರಿಂದ ಬರುವುದಲ್ಲ. ಅದು ನಮಗೆ ಸಾಕ್ಷಾತ್ಕಾರವಾಗಬೇಕು. **"Truth is an intuitional flash, it is not Intellectual".** ಸತ್ಯ ಎನ್ನುವುದು ನಮಗೆ ಸ್ಫುರಣವಾಗಬೇಕು. ಎಲ್ಲಾ ವೇದ ಮಂತ್ರಗಳೂ ಋಷಿಗಳಿಗೆ ಅಂತರಂಗದಲ್ಲಿ ಸ್ಫೂರಣವಾಗಿರುವುದು(**intuitional composition**). ನ್ಯೂಟನ್ ಗೆ ಗುರುತ್ವಾಕರ್ಷಣ ಶಕ್ತಿಯ ವಿಚಾರ ಹೊಳೆದಂತೆ. ಈ ಕಾರಣಕ್ಕಾಗಿ ಮೊದಲು ನಾವು ಸತ್ಯಕ್ಕೆ ಶರಣಾಗಬೇಕು; ಸತ್ಯವನ್ನು ಕಂಡ ತತ್ವಜ್ಞಾನಿಗಳ ಬೆನ್ನುಹತ್ತಬೇಕು.

ಸಾಮಾನ್ಯವಾಗಿ ಸತ್ಯವನ್ನು ಸಾಕ್ಷಾತ್ಕಾರ ಮಾಡಿಕೊಂಡ ಜ್ಞಾನಿಗಳು ಜ್ಞಾನವನ್ನು ಯೋಗ್ಯರಲ್ಲದವರಿಗೆ ಎಂದೂ ಬೋಧಿಸುವುದಿಲ್ಲ. ಈ ಕಾರಣಕ್ಕಾಗಿ ಕೃಷ್ಣ ಹೇಳುತ್ತಾನೆ: "ತತ್ವದರ್ಶಿಗಳನ್ನು ಕಂಡರೆ ಬಿಡಬೇಡ, ಅವರ ಬೆನ್ನು ಹತ್ತು, ಅವರನ್ನು ಒಲಿಸಿಕೋ, ಅವರ ಮುಂದೆ ನೀನು ಯೋಗ್ಯ ಎಂದು ರುಜುವಾತು ಪಡಿಸು. ನಿನ್ನ ಅನನ್ಯ ಬಯಕೆ ಅವರಿಗೆ ಮನವರಿಕೆಯಾಗುವಂತೆ ಮಾಡು, ಅವರಿಗೆ ಶರಣಾಗು" ಎಂದು. ಇಲ್ಲಿ 'ಪ್ರಣಿಪಾತ' ಅಂದರೆ ಎಂಟು ಅಂಗಗಳ ನಮಸ್ಕಾರ. ತಲೆ, ಎದೆ, ಕೈ, ಕಾಲು ಎಲ್ಲವನ್ನು ನೆಲಕ್ಕೆ ತಾಗಿಸಿ, ಭಕ್ತಿಯ ದೃಷ್ಟಿಯಿಂದ, ಸ್ತೋತ್ರ(ವಚನ) ಮುಖೇನ, ಮನಸ್ಸಿನಲ್ಲಿ ಅಪಾರ ಗೌರವವಿಟ್ಟು ಮಾಡುವ ನಮಸ್ಕಾರ-'ಅಷ್ಟಾಂಗ ನಮನ'. ಹೀಗೆ ಶರಣಾಗಿ "ಕೆದಕಿ ಕೆದಕಿ, ಪರಿಪರಿಯಾಗಿ ಕೇಳಿ ತಿಳಿದುಕೋ" ಎನ್ನುತ್ತಾನೆ ಕೃಷ್ಣ. 'ತತ್ವದರ್ಶಿಗಳ

ಸೇವೆಮಾಡಿ ಅವರಿಂದ ಜ್ಞಾನವನ್ನು ಗಳಿಸು, ಅದರಿಂದ ಕರ್ಮ ಮಾಡು' ಎನ್ನುವುದು ಕೃಷ್ಣ ಅರ್ಜುನನ ಮೂಲಕ ನಮಗೆ ಕೊಟ್ಟ ಸಂದೇಶ.

ಒಮ್ಮೆ ತತ್ವದರ್ಶಿಗಳಿಂದ ಜ್ಞಾನವನ್ನು ಪಡೆದರೆ ಮುಂದೆ ಮೋಹಕ್ಕೆ ಅವಕಾಶವಿಲ್ಲ. ಇಲ್ಲಿ ಅರ್ಜುನನನ್ನು ಕಾಡುತ್ತಿರುವುದು ಜ್ಞಾನವನ್ನು ಮುಚ್ಚಿರುವ ಮೋಹದ ಪರದೆ. ಅದಕ್ಕಾಗಿ ಕೃಷ್ಣ ಅರ್ಜುನನನ್ನು 'ಪಾಂಡವ' ಎಂದು ಸಂಬೋಧಿಸುತ್ತಾನೆ. ಇಲ್ಲಿ 'ಪಂಡಾ' ಎಂದರೆ ಜ್ಞಾನ (ಉದಾ:ಪಂಡಾ ಉಳ್ಳವ ಪಂಡಿತ), ಪಾಂಡವ ಎಂದರೆ ಜ್ಞಾನರಾಶಿಯನ್ನು ಪಡೆದವ. ಇನ್ನು ಪಾಂಡು ಎಂದರೆ 'ಬಿಳಿ ಬಣ್ಣ'. ಅದು ಸಾತ್ವಿಕತೆಯ ಸಂಕೇತ. 'ನೀನು ಸ್ವಯಂ ಜ್ಞಾನಿ ಹಾಗೂ ಸಾತ್ವಿಕ' ಎಂದು ಸೂಚಿಸಿ ಇಲ್ಲಿ ಈ ಸಂಬೋಧನೆ.

ಒಮ್ಮೆ ಸತ್ಯದ ಅರಿವು ಬಂದರೆ ಅದರಿಂದ ಮೋಹದ ಪಾಶ ಕಳಚಿಹೋಗುತ್ತದೆ. ಅದು ಪುನಃ ಬರುವ ಸಂಭವವಿಲ್ಲ. ಈ ಸ್ಥಿತಿಯಲ್ಲಿ ಸಮಸ್ತ ಜೀವಜಾತವೂ ಆತ್ಮನಲ್ಲಿ (ಭಗವಂತನಲ್ಲಿ) ಆಶ್ರಿತವಾಗಿದೆ, ಎಲ್ಲವುದಕ್ಕೂ ನಿಯಾಮಕಶಕ್ತಿ ಭಗವಂತ ಎನ್ನುವ ಪ್ರಜ್ಞೆ ಜಾಗೃತವಾಗುತ್ತದೆ. ಇದರಿಂದ ಎಲ್ಲಾ ಗೊಂದಲವೂ ಮರೆಯಾಗುತ್ತದೆ. ಸ್ವಾರ್ಥ, ದುಃಖ, ಅಸೂಹೆ, ಎಲ್ಲವೂ ಹೊರಟು ಹೋಗಿ ಸ್ಥಿತಪ್ರಜ್ಞೆ ಮೂಡುತ್ತದೆ. ಭಗವಂತ ಅಣು ಒಳಗೆ ಅಣುವಾಗಿ, ಎಲ್ಲರೊಳಗೂ ಬಿಂಬ ರೂಪನಾಗಿ ತುಂಬಿದ್ದಾನೆ ಹಾಗೂ ಆತ ಮಹತ್ತಿನಲ್ಲಿ ಮಹತ್ತಾಗಿರುವ ಸರ್ವಗತ. ಅವನ ಇಚ್ಛೆಯಂತೇ ಎಲ್ಲವೂ ನಡೆಯುತ್ತದೆ ಎನ್ನುವ ಸತ್ಯ ತಿಳಿಯುತ್ತದೆ. ಭಗವಂತನಲ್ಲಿ ತನ್ನನ್ನು ತಾನು ಒಪ್ಪಿಸಿಕೊಂಡವನಿಗೆ ಜೀವನದಲ್ಲಿ ಎಂದೂ ಭಯವಿಲ್ಲ.

ಜ್ಞಾನದಿಂದ ಕರ್ಮ ಮಾಡಬೇಕು, ತತ್ವ ಜ್ಞಾನಿಗಳಿಂದ ಜ್ಞಾನ ಪಡೆಯಬೇಕು, ಅದರಿಂದ ಮೋಕ್ಷ ಸಾಧ್ಯ ಎನ್ನುವ ವಿಚಾರ ತಿಳಿಯಿತು. ಆದರೆ ಈ ವಿಷಯ ತಿಳಿಯುವ ಮೊದಲು ಸಾಕಷ್ಟು ಪಾಪ ಕರ್ಮಗಳನ್ನು ಮಾಡಿದ ಪಾಪಿಗಳ ಗತಿ ಏನು? ಇದಕ್ಕಾಗಿ ಭಯ ಪಡಬೇಕಾಗಿಲ್ಲ ಎನ್ನುತ್ತಾನೆ ಕೃಷ್ಣ. ಈ ವಿಚಾರವಾಗಿ ಕೃಷ್ಣನ ಭರವಸೆಯನ್ನು ಮುಂದಿನ ಶ್ಲೋಕದಲ್ಲಿ ನೋಡೋಣ.

ಅಪಿ ಚೇದಸಿ ಪಾಪೇಭ್ಯಃ ಸರ್ವೇಭ್ಯಃ ಪಾಪಕೃತ್ತಮಃ ।
ಸರ್ವಂ ಜ್ಞಾನಪ್ಲವೇನೈವ ವೃಜಿನಂ ಸಂತರಿಷ್ಯಸಿ ॥೩೬॥

ಅಪಿ ಚೇತ್ ಅಸಿ ಪಾಪೇಭ್ಯಃ ಸರ್ವೇಭ್ಯಃ ಪಾಪ ಕೃತ್ ತಮಃ
ಸರ್ವಮ್ ಜ್ಞಾನ ಪ್ಲವೇನ ಏವ ವೃಜಿನಮ್ ಸಂತರಿಷ್ಯಸಿ-ನೀನು ಎಲ್ಲಾ ಪಾಪಿಗಳಿಗಿಂತಲೂ ಹಿರಿಯ ಪಾಪಿಯಾಗಿದ್ದರೂ ಸರಿಯೇ, ಎಲ್ಲಾ ಪಾತಕಗಳನ್ನೂ ತಿಳಿವಿನ ದೋಣಿಯಿಂದ ದಾಟಬಲ್ಲೆ.

"ನೀನು ನಿನ್ನ ಕಾಲದಲ್ಲಿನ ಸರ್ವಶ್ರೇಷ್ಠ ಪಾಪಿಯಾಗಿದ್ದರೂ ಕೂಡಾ, ಒಮ್ಮೆ ನಿನಗೆ ಭಗವಂತನ ಅರಿವು ಮೂಡಿದರೆ ನೀನು ಗೆದ್ದಂತೆ" ಎನ್ನುತ್ತಾನೆ ಕೃಷ್ಣ. ಏಕೆಂದರೆ ತಿಳುವಳಿಕೆ ಬಂದ ಮೇಲೆ ಜ್ಞಾನದ ಮಾರ್ಗದಲ್ಲಿ ಸಾಗಿದರೆ ಹಿಂದಿನ ಯಾವ ಪಾಪವೂ ನಿಲ್ಲುವುದಿಲ್ಲ. ಜ್ಞಾನವೆನ್ನುವುದು ಪಾಪದ ಕಡಲಿನಲ್ಲಿ ದೋಣಿಯಂತೆ. ಅದು ನಮ್ಮನ್ನು ದಡ ಸೇರಿಸಬಲ್ಲದು. ಪಾಪದ ಕಡಲನ್ನು ದಾಟಲು ಇರುವ ಒಂದೇ ಒಂದು ಸಾಧನ ಜ್ಞಾನ. ಇಂತಹ

ದೊಡ್ಡ ಭರವಸೆಯನ್ನು ಕೃಷ್ಣ ಕೊಟ್ಟಿದ್ದಾನೆ. ಆದ್ದರಿಂದ ನಾವೆಲ್ಲರೂ ಇಂದೇ ಈ ಕ್ಷಣದಿಂದ ಜ್ಞಾನ ಮಾರ್ಗದಲ್ಲಿ ಸಾಗುವ ಸಂಕಲ್ಪ ತೊಟ್ಟು ಮುಂದುವರಿಯೋಣ- ಏಕೆಂದರೆ ನಾಳೆ ಎಂದರೆ ಆ ನಾಳೆ ನಮ್ಮ ಪಾಲಿಗೆ ಬಾರದೇ ಇರಬಹುದು! **Yesterday was history, tomorrow is a mystery, today is God's gift, that's why we call it 'the present' .**

ಜ್ಞಾನ ಮಾರ್ಗವನ್ನು ಹಿಡಿದ ಒಬ್ಬ ಪಾಪಿಯ ಪಾಪಕರ್ಮವೇನಾಗುತ್ತದೆ ಎನ್ನುವುದಕ್ಕೆ ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರಣೆಯನ್ನು ಕೊಟ್ಟಿದ್ದಾನೆ.

ಯಥೈಧಾಂಸಿ ಸಮಿದ್ಧೋಽಗ್ನಿರ್ಭಸ್ಮಸಾತ್ ಕುರುತೇ ಅರ್ಜುನ ।
ಜ್ಞಾನಾಗ್ನಿಃ ಸರ್ವಕರ್ಮಾಣಿ ಭಸ್ಮಸಾತ್ ಕುರುತೇ ತಥಾ ॥೩೭॥

ಯಥಾ ಏಧಾಂಸಿ ಸಮಿದ್ಧಃ ಅಗ್ನಿಃ ಭಸ್ಮ ಸಾತ್ ಕುರುತೇ ಅರ್ಜುನ ।
ಜ್ಞಾನಾಗ್ನಿಃ ಸರ್ವ ಕರ್ಮಾಣಿ ಭಸ್ಮ ಸಾತ್ ಕುರುತೇ ತಥಾ- ಅರ್ಜನಾ, ಉರಿಯುವ ಬೆಂಕಿ ಉರುವಲನ್ನುಸುಟ್ಟುಬಿಡುವ ಹಾಗೆ ಅರಿವಿನ ಬೆಂಕಿ ಎಲ್ಲಾ ಕರ್ಮಗಳನ್ನೂ ಸುಟ್ಟುಬಿಡುತ್ತದೆ.

ಜ್ಞಾನ ಎನ್ನುವುದು ಸದಾ ಪ್ರಜ್ವಲಿಸುವ ಬೆಂಕಿ. ಅದಕ್ಕಿಂತ ಹೆಚ್ಚು ಶಕ್ತಿ ಶಾಲಿಯಾದ ಬೆಂಕಿ ಇನ್ನೊಂದಿಲ್ಲ. ಹೇಗೆ ಉರಿಯುವ ಬೆಂಕಿ ಕಟ್ಟಿಗೆಯನ್ನು ಸುಟ್ಟುಬಿಡುತ್ತದೋ, ಹಾಗೇ ಜ್ಞಾನದ ಬೆಂಕಿ ಎಲ್ಲಾ ಪಾಪ ಕರ್ಮವನ್ನು ಸುಟ್ಟುಬಿಡುತ್ತದೆ. ಭಾಗವತದಲ್ಲಿ ಹೇಳುವಂತೆ ಆಧ್ಯಾತ್ಮಿಕವಾಗಿ ಬೆಂಕಿ ಸತ್ವ ಗುಣದ ಪ್ರತೀಕ. ಏಕೆಂದರೆ ಅದು ಬೆಳಕು ಕೊಡುವ ಹಾಗೂ ಸದಾ ಊರ್ಧ್ವ ಮುಖವಾಗಿರುವ ಶಕ್ತಿ. ಅದೇ ರೀತಿ ಕಟ್ಟಿಗೆ ಸದಾ ಕೆಳಕ್ಕೆಳೆಯುವ ತಮೋಗುಣದ ಪ್ರತೀಕ. ಬೆಂಕಿ ಕಟ್ಟಿಗೆಯನ್ನು ಸುಟ್ಟಂತೆ ಒಬ್ಬ ಸಾಧಕನಲ್ಲಿರುವ ಜ್ಞಾನ ತಮಸ್ಸನ್ನು ಸುಟ್ಟುಬಿಡುತ್ತದೆ. ಇಲ್ಲಿ ಕೃಷ್ಣ 'ಅರ್ಜುನಾ' ಎಂದು ಸಂಬೋಧಿಸಿದ್ದಾನೆ. ಅರ್ಜುನ ಎಂದರೆ 'ಅರ್ಜನ' ಮಾಡಿದವ, ಜ್ಞಾನವೆಂಬ ಬೆಂಕಿ ಉಳ್ಳವ. ಈ ಸಂಬೋಧನೆಯಿಂದ ಕೃಷ್ಣ ಅರ್ಜುನನ ಜ್ಞಾನಕ್ಕೆ ಆವರಿಸಿರುವ ಮೋಹದ ಪರದೆಯನ್ನು ಸರಿಸುತ್ತಿದ್ದಾನೆ.

ನಹಿ ಜ್ಞಾನೇನ ಸದೃಶಂ ಪವಿತ್ರಮಿಹ ವಿದ್ಯತೇ ।
ತತ್ ಸ್ವಯಂ ಯೋಗಸಂಸಿದ್ಧಃ ಕಾಲೇನಾಽತ್ಮನಿ ವಿಂದತಿ ॥೩೮॥

ನ ಹಿ ಜ್ಞಾನೇನ ಸದೃಶಮ್ ಪವಿತ್ರಮ್ ಇಹ ವಿದ್ಯತೇ
ತತ್ ಸ್ವಯಮ್ ಯೋಗ ಸಂಸಿದ್ಧಃ ಕಾಲೇನ ಆತ್ಮನಿ ವಿಂದತಿ- ತಿಳಿವಿಗೆ ಸಾಟಿಯಾದ ಪಾವನವಾದ ವಸ್ತು ಇಲ್ಲಿ ಇನ್ನೊಂದಿಲ್ಲ. ಸಾಧನೆಯಿಂದ ಪಳಗಿದವನು ತಕ್ಕ ಕಾಲದಲ್ಲಿ ಅದನ್ನು ತಾನೇ ತನ್ನಲ್ಲಿ ಪಡೆಯುತ್ತಾನೆ.

ಜ್ಞಾನ ಎನ್ನುವುದು ಮಹಾಪವಿತ್ರ. ಅದಕ್ಕೆ ಸಾಟಿಯಾದ ಇನ್ನೊಂದು ವಸ್ತು ಈ ಪ್ರಪಂಚದಲ್ಲಿಲ್ಲ. ಏಕೆಂದರೆ ಜ್ಞಾನವೆಂದರೆ ಭಗವಂತ. ಆದ್ದರಿಂದ "ಜ್ಞಾನ ಮಾರ್ಗವನ್ನು ಹಿಡಿ, ಕಾಲ ಪರಿಪಕ್ವವಾದಾಗ ನೀನು ಸಿದ್ಧಿಯನ್ನು ಪಡೆದೇ ಪಡೆಯುತ್ತೀ" ಎನ್ನುವುದು ಕೃಷ್ಣನ ಭರವಸೆ. ಕೆಲವೊಮ್ಮೆ ಸಾಧನೆಯ ಪಥದಲ್ಲಿ ಸಿದ್ಧಿಯನ್ನು ಪಡೆಯಲು ಕೆಲವು ಜನ್ಮಗಳೇ ಬೇಕಾಗಬಹುದು. ಆದರೆ ಭಗವಂತನ ಭರವಸೆಯನ್ನು ನಂಬಿ ಆತ್ಮವಿಶ್ವಾಸದಿಂದ ಮುನ್ನೆಡೆದವನು ಸಿದ್ಧಿಯನ್ನು ಪಡೆಯುತ್ತಾನೆ.

ಶ್ರದ್ಧಾವಾನ್ ಲಭತೇ ಜ್ಞಾನಂ ತತ್ಪರಃ ಸಂಯತೇಂದ್ರಿಯಃ ।
ಜ್ಞಾನಂ ಲಬ್ಧ್ವಾ ಪರಾಂ ಶಾಂತಿಮಚಿರೇಣಾಧಿಗಚ್ಛತಿ ॥೩೯॥

ಶ್ರದ್ಧಾವಾನ್ ಲಭತೇ ಜ್ಞಾನಮ್ ತತ್ ಪರಃ ಸಂಯತ ಇಂದ್ರಿಯಃ ।
ಜ್ಞಾನಮ್ ಲಬ್ಧ್ವಾ ಪರಾಮ್ ಶಾಂತಿಮ ಆಚಿರೇಣ ಅಧಿಗಚ್ಛತಿ-- ಇಂದ್ರಿಯಗಳನ್ನು ಹದ್ದಿನಲ್ಲಿಟ್ಟು, ಶ್ರದ್ಧೆಯಿಂದ ನನ್ನನ್ನೇ ಪರದೈವವೆಂದು ನಂಬಿದವನು ತಿಳಿವನ್ನುಗಳಿಸಿ ಶೀಘ್ರವಾಗಿ ಸಂತಸದ ಸೆಲೆಯಾದ ಮುಕ್ತಿಯನ್ನು ಪಡೆಯುತ್ತಾನೆ.

ನಮ್ಮಲ್ಲಿ ಅರಿವು ಮೂಡಬೇಕೆಂದರೆ ಬರಿಯ ಅಧ್ಯಯನ ಸಾಲದು. ಒಂದು ವಿಷಯ ನಮಗೆ ಮನವರಿಕೆಯಾಗಬೇಕಾದರೆ ಮೊದಲು ನಮಗೆ ಶ್ರದ್ಧೆ ಬೇಕು. ಇಲ್ಲಿ ಸಮರ್ಪಣಾ ಭಾವನೆ ಅತಿಮುಖ್ಯ. ನಾನು ತಿಳಿದದ್ದೇ ದೊಡ್ಡದು, ಅದಕ್ಕಿಂತ ದೊಡ್ಡದು ಯಾವುದೂ ಇಲ್ಲ ಅನ್ನುವ ಅಹಂಕಾರವನ್ನು ಮೊದಲು ಬಿಡಬೇಕು. ನನಗೆ ಯಾವುದು ತಿಳಿದಿಲ್ಲವೋ ಅದು ಸತ್ಯವಾಗಿರಲು ಸಾಧ್ಯ ಎನ್ನುವ ಶ್ರದ್ಧೆ ಬೇಕು. ಪ್ರಪಂಚದ ಸತ್ಯ ನಮ್ಮ ನಂಬಿಕೆಯ ಮೇಲೆ ನಿಂತಿಲ್ಲ. ಈ ಪ್ರಪಂಚದಲ್ಲಿ ನಮಗೆ ತಿಳಿದಿರುವುದು ಕೇವಲ ಅತೀ ಚಿಕ್ಕ ಅಂಶ. ನಮಗೆ ಗೊತ್ತಿಲ್ಲದೇ ಇರುವ ಸತ್ಯ ಇದೆ ಎಂದು ತಿಳಿಯುವುದೇ ಶ್ರದ್ಧೆ. ನಮ್ಮ ಬದುಕಿನ ಗುರಿ ಜ್ಞಾನ ಮತ್ತು ಸತ್ಯದ ತಿಳುವಳಿಕೆಯಾಗಬೇಕು. ಜ್ಞಾನದ ತೃಷೆ ಜೊತೆಗೆ ಇಂದ್ರಿಯಗಳ ಚಾಪಲ್ಯಕ್ಕೆ ಹಿಡಿತವಿರಬೇಕು. ಹೀಗಿದ್ದಾಗ ಅದರಿಂದ ಮಾನಸ ಸಾಕ್ಷಾತ್ಕಾರ, ಆತ್ಮಸಾಕ್ಷಾತ್ಕಾರ-ಕೊನೆಗೆ ಪರಮಾತ್ಮನ ಸಾಕ್ಷಾತ್ಕಾರ. ಈ ನಡೆಯಿಂದ ಅಪರೋಕ್ಷ ಜ್ಞಾನ ಸಿದ್ಧಿಯಾಗುತ್ತದೆ ಮತ್ತು ಇದರಿಂದ ಸದಾ ಜ್ಞಾನಾನಂದಪೂರ್ಣನಾದ ಭಗವಂತನನ್ನು (ಮೋಕ್ಷವನ್ನು) ಪಡೆಯಲು ಸಾಧ್ಯ.

ಅಜ್ಞಶ್ಚಾಶ್ರದ್ದಧಾನಶ್ಚ ಸಂಶಯಾತ್ಮಾ ವಿನಶ್ಯತಿ ।
ನಾಯಂ ಲೋಕೋಽಸ್ತಿ ನ ಪರೋ ನ ಸುಖಂ ಸಂಶಯಾತ್ಮನಃ॥೪೦॥

ಅಜ್ಞಃ ಚ ಅಶ್ರದ್ದಧಾನಃ ಚ ಸಂಶಯ ಆತ್ಮಾ ವಿನಶ್ಯತಿ
ನ ಅಯಮ್ ಲೋಕಃ ಅಸ್ತಿ ನ ಪರಃ ನ ಸುಖಮ್ ಸಂಶಯ ಆತ್ಮನಃ -- ಅರಿವಿರದ, ನಂಬಿಕೆ ಕಳೆದುಕೊಂಡ ಇಬ್ಬಂದಿ ವಿನಾಶದತ್ತ ಸಾಗುತ್ತಾನೆ. ಇಬ್ಬಂದಿಗೆ ಇಹವಿಲ್ಲ; ಪರವಿಲ್ಲ; ನೆಮ್ಮದಿಯೂ ಇಲ್ಲ.

ಜ್ಞಾನವಿಲ್ಲದ, ಶ್ರದ್ಧೆ ಇಲ್ಲದ ಅಜ್ಞಾನಿಗಳು ನಿರಂತರ ಸಂಶಯದಲ್ಲೇ ಬದುಕುತ್ತಾರೆ. ಜ್ಞಾನ ಮತ್ತು ಶ್ರದ್ಧೆ ಇಲ್ಲದಾಗ ಅಲ್ಲಿ ಸಂಶಯ ಬೆಳೆಯಲಾರಂಭಿಸುತ್ತದೆ. ಆ ಸಂಶಯ ಮನಸ್ಸನ್ನು ಆಕ್ರಮಿಸಿ ನಂತರ ಚಿತ್ತವನ್ನು ತಲುಪುತ್ತದೆ. ಬುದ್ಧಿಗೆ ಬಂದ ಸಂಶಯಕ್ಕೆ ಪರಿಹಾರವಿಲ್ಲ. ಅದು ನಮ್ಮನ್ನು ಅಧಃಪಾತಕ್ಕೆ ಕೊಂಡೊಯ್ಯುತ್ತದೆ. ಇದರಿಂದ ಅಂತವರಿಗೆ ಇಹವಿಲ್ಲ, ಪರವಿಲ್ಲ, ಎಂದೆಂದೂ ನೆಮ್ಮದಿ ಇಲ್ಲ.

ಯೋಗಸಂನ್ಯಸ್ತಕರ್ಮಾಣಂ ಜ್ಞಾನಸಂಛಿನ್ನಸಂಶಯಮ್ ।
ಆತ್ಮವಂತಂ ನ ಕರ್ಮಾಣಿ ನಿಬಧ್ನಂತಿ ಧನಂಜಯ ॥೪೧॥

ಯೋಗ ಸಂನ್ಯಸ್ತ ಕರ್ಮಾಣಮ್ ಜ್ಞಾನ ಸಂಛಿನ್ನ ಸಂಶಯಮ್
ಆತ್ಮವಂತಮ್ ನ ಕರ್ಮಾಣಿ ನಿಬಧ್ನಂತಿ ಧನಂಜಯ- ಧನಂಜಯಾ, ಸಾಧನೆಯಿಂದ ಕರ್ಮಫಲದ ನಂಟು ತೊರೆದ, ಅರಿವಿನಿಂದ ಶಂಕೆಗಳನ್ನು ಕಳೆದುಕೊಂಡ ಭಗವದ್ಭ ಕ್ತನನ್ನು ಕರ್ಮಗಳು ಕಟ್ಟಿ ಹಾಕುವುದಿಲ್ಲ.

ಜೀವನದಲ್ಲಿ ಕರ್ಮ ಮಾಡು, ಕರ್ಮ ಮಾಡುತ್ತಾ ಕರ್ಮ ಸಂನ್ಯಾಸ ಮಾಡು ಎನ್ನುತ್ತಾನೆ ಕೃಷ್ಣ. ಇಲ್ಲಿ ಕರ್ಮ ಸಂನ್ಯಾಸ ಅಂದರೆ ಕರ್ಮ ತ್ಯಾಗವಲ್ಲ. 'ಈ ಕರ್ಮ ಭಗವಂತನಿಗೆ ಸೇರಿದ್ದು ಎಂದು ಭಗವಂತನಲ್ಲಿ ಕರ್ಮವನ್ನು ಅರ್ಪಿಸುವುದು'- ಕರ್ಮಸಂನ್ಯಾಸ(ಈ ಬಗ್ಗೆ ಮುಂದಿನ ಅಧ್ಯಾಯದಲ್ಲಿ ಹೆಚ್ಚಿನ ವಿವರಣೆಯನ್ನು ಕಾಣಬಹುದು). ಕರ್ಮಫಲದ ಬಗ್ಗೆ ಆಸೆ ಆಕಾಂಕ್ಷೆಗಳನ್ನು ಬಿಟ್ಟು, ಎಲ್ಲವನ್ನೂ ಸಮದೃಷ್ಟಿಯಿಂದ ಕಾಣುತ್ತಾ, ನಿರ್ವಿಕಾರನಾಗಿ ನಿರಂತರ ಕರ್ಮ ಮಾಡುವುದು ಕರ್ಮಸಂನ್ಯಾಸ. ಕರ್ಮವನ್ನು ಭಗವಂತನಲ್ಲಿ ಅರ್ಪಿಸಿ, ಜ್ಞಾನದಿಂದ ಸಂಶಯವನ್ನು ಪರಿಹರಿಸಿಕೊಂಡು, ವಿವೇಕಿಯಾಗಿ ಚಿತ್ತವನ್ನು ಜಾಗೃತಿಗೊಳಿಸಿ, ಆತ್ಮವಂತನಾಗಿ ಬದುಕುವುದನ್ನು ಕಲಿತಾಗ ಯಾವ ಕರ್ಮವೂ ಎಂದೂ ನಮಗೆ ಬಂಧಕವಾಗುವುದಿಲ್ಲ. "ಯುದ್ಧದಲ್ಲಿ ಶತ್ರುಗಳನ್ನು ಗೆದ್ದು ಧನವನ್ನು ಗೆದ್ದ ನೀನು, ಜ್ಞಾನಧನವನ್ನು ಗೆದ್ದ ಧನಂಜಯ, ನಿನ್ನನ್ನು ಕರ್ಮ ಬಂಧಿಸದು" ಎನ್ನುತ್ತಾನೆ ಕೃಷ್ಣ.

ತಸ್ಮಾದಜ್ಞಾನಸಂಭೂತಂ ಹೃತ್ ಸ್ಥಂ ಜ್ಞಾನಾಸಿನಾssತ್ಮನಃ ।
ಛಿತ್ತ್ವೈನಂ ಸಂಶಯಂ ಯೋಗಮಾತಿಷ್ಠೋತ್ತಿಷ್ಠ ಭಾರತ ॥೪೨॥

ತಸ್ಮಾತ್ ಅಜ್ಞಾನ ಸಂಭೂತಮ್ ಹೃತ್ ಸ್ಥಮ್ ಜ್ಞಾನ ಅಸಿನಾ ಆತ್ಮನಃ ।
ಛಿತ್ತ್ವೈನಮ್ ಸಂಶಯಮ್ ಯೋಗಮ್ ಆತಿಷ್ಠ ಉತ್ತಿಷ್ಠ ಭಾರತ-ಆದ್ದರಿಂದ, ಓ ಭಾರತಾ, ಅಜ್ಞಾನದಿಂದ ಹುಟ್ಟಿ ಬಗೆಯೊಳಹೊಕ್ಕು ನಿಂತ ನಿನ್ನ ಈ ಸಂದೇಹವನ್ನು ತಿಳಿವಿನ ಕತ್ತಿಯಿಂದ ಕತ್ತರಿಸಿ ಜ್ಞಾನದ ದಾರಿಯಲ್ಲಿ ನಡೆ; ಎದ್ದು ನಿಲ್ಲು.

"ಆದ್ದರಿಂದ ಎದ್ದು ನಿಲ್ಲು, ಭರತ ಚಕ್ರವರ್ತಿಯಂತಹ ಮಹಾ ಪುರುಷರು ಹುಟ್ಟಿ ಬಂದ ವಂಶದವನಾದ ನೀನು ಜ್ಞಾನ ಸ್ವರೂಪನಾದ ಭಗವಂತನ ಭಕ್ತಿಯಲ್ಲಿ ನಿರತನಾದ ಜ್ಞಾನಿ(ಭಾರತ); ನಿನ್ನ ಮನಸ್ಸಿನಲ್ಲಿ ಕುಳಿತಿರುವ

ಸಂಶಯವನ್ನು ಭಗವಂತನೆನ್ನುವ ಜ್ಞಾನ ಕತ್ತಿಯಿಂದ ಕಡಿದು ಹಾಕು. ಅನ್ಯಾಯದ ವಿರುದ್ಧ ಹೋರಾಟ ಭಗವಂತನ ಪೂಜೆ ಎನ್ನುವ ಧೀಕ್ಷೆ ತೊಟ್ಟು, ಸತ್ಯದ, ಪ್ರಾಮಾಣಿಕತೆಯ ಬದುಕನ್ನು ಬದುಕುವುದಕ್ಕೋಸ್ಕರ ಪುಣ್ಯದ ಸಾಧನೆಯಲ್ಲಿ ತೊಡಗು" ಎನ್ನುತ್ತಾನೆ ಕೃಷ್ಣ.

**ಇತಿ ಚತುರ್ಥೋಽಧ್ಯಾಯಃ**

ನಾಲ್ಕನೆಯ ಅಧ್ಯಾಯ ಮುಗಿಯಿತು.



# ಅಧ್ಯಾಯ ಐದು

ನಾಲ್ಕನೇ ಅಧ್ಯಾಯದಲ್ಲಿ ಕೃಷ್ಣ ಕರ್ಮಯೋಗದ ಬಗ್ಗೆ ಹೇಳಿದ ಹಾಗೂ ಕೊನೆಯಲ್ಲಿ ಕರ್ಮಸಂನ್ಯಾಸದ ಬಗ್ಗೆಯೂ ಹೇಳಿದ. ಇಲ್ಲಿ ನಮಗೆ ಸ್ವಲ್ಪ ಗೊಂದಲವಾಗುತ್ತದೆ. ಇದನ್ನು ಸಂಪೂರ್ಣ ಅರ್ಥ ಮಾಡಿಕೊಳ್ಳಬೇಕಾದರೆ ಮೊದಲು ಕರ್ಮಯೋಗ ಮತ್ತು ಕರ್ಮಸಂನ್ಯಾಸ ಅಂದರೆ ಏನು ಎಂದು ತಿಳಿಯಬೇಕು. ಮೇಲ್ನೋಟಕ್ಕೆ ನಮಗೆ ಕರ್ಮಸಂನ್ಯಾಸ ಅಂದರೆ 'ಕರ್ಮತ್ಯಾಗ' ಎನ್ನುವಂತೆ ಕಾಣುತ್ತದೆ. ಆದರೆ ಕೃಷ್ಣ ನಾಲ್ಕನೇ ಅಧ್ಯಾಯದ ಕೊನೆಯಲ್ಲಿ "ಎದ್ದು ನಿಲ್ಲು- ಯುದ್ಧ ಮಾಡು" ಎಂದು ಅರ್ಜುನನನ್ನು ಕರ್ಮ ಮಾಡುವಂತೆ ಹುರಿದುಂಬಿಸಿದ್ದನ್ನು ನಾವು ಕಂಡಿದ್ದೇವೆ. ಇದರಿಂದ ಕರ್ಮಸಂನ್ಯಾಸ ಅಂದರೆ ಕರ್ಮತ್ಯಾಗವಲ್ಲ ಎನ್ನುವುದು ನಮಗೆ ಸ್ಪಷ್ಟವಾಗುತ್ತದೆ. ಶಾಸ್ತ್ರೀಯವಾಗಿ ಕರ್ಮಸಂನ್ಯಾಸ ಎಂದರೆ ದ್ವಂದ್ವಾತೀತವಾಗಿ, ಕರ್ಮಫಲದ ಬಯಕೆಯಿಲ್ಲದೇ-ಕರ್ಮ ಮಾಡುವುದು. ಇಲ್ಲಿ ರಾಗ-ದ್ವೇಷಗಳಿಗೆ, ಕಾಮ-ಕ್ರೋಧಗಳಿಗೆ ಎಡೆಯಿಲ್ಲ. ಈ ಬಗ್ಗೆಯೂ ವಿಶೇಷವಾಗಿ ಕೃಷ್ಣ ಹಿಂದೆ ವಿವರಿಸಿದ್ದ. ಆದ್ದರಿಂದ ಕರ್ಮಸಂನ್ಯಾಸ ಎಂದರೆ ಕರ್ಮವನ್ನು ಬಿಡುವುದಲ್ಲ, ಕರ್ಮದಲ್ಲಿ ಕಾಮ ಕ್ರೋಧಗಳನ್ನು ಬಿಡುವುದು. "ಕಾಮಕ್ರೋಧಗಳ ಅತೀತನಾಗಿ ಯುದ್ಧಮಾಡು ಮತ್ತು ಜ್ಞಾನಯೋಗದ ದಾರಿಯಲ್ಲಿ ನಡೆ" ಎನ್ನುವುದು ಅರ್ಜುನನಿಗೆ ಕೃಷ್ಣನ ಸಂದೇಶ. ಆದರೆ ಕಾಮ-ಕ್ರೋಧಗಳ ಅತೀತನಾಗಿ ಜ್ಞಾನಮಾರ್ಗದಲ್ಲಿ ಯುದ್ಧ ಮಾಡುವುದು ಹೇಗೆ? ಇದನ್ನು ಅರ್ಥ ಮಾಡಿಕೊಳ್ಳುವುದು ನಮಗೆ ಸ್ವಲ್ಪ ಕಷ್ಟ. ಈ ಕುರಿತು ಅರ್ಜುನ ಕೃಷ್ಣನಲ್ಲಿ ವಿವರಣೆಯನ್ನು ನಮ್ಮ ನಿಮ್ಮೆಲ್ಲರ ಪರವಾಗಿ ಕೇಳುವುದರೊಂದಿಗೆ ಐದನೇ ಅಧ್ಯಾಯ ಆರಂಭವಾಗುತ್ತದೆ. ಈ ಅಧ್ಯಾಯದಲ್ಲಿ ಕರ್ಮಸಂನ್ಯಾಸದ ಬಗ್ಗೆ ವಿಶೇಷವಾದ ವಿವರಣೆಯನ್ನು ಕೃಷ್ಣ ನಮ್ಮ ಮುಂದಿಟ್ಟಿದ್ದಾನೆ.

ಅರ್ಜುನ ಉವಾಚ ।
ಸಂನ್ಯಾಸಂ ಕರ್ಮಣಾಂ ಕೃಷ್ಣ ಪುನರ್ಯೋಗಂ ಚ ಶಂಸಸಿ ।
ಯಚ್ಛ್ರೇಯ ಏತಯೋರೇಕಂ ತನ್ಮೇ ಬ್ರೂಹಿ ಸುನಿಶ್ಚಿತಮ್ ॥೧॥

ಅರ್ಜುನಃ ಉವಾಚ-ಅರ್ಜುನ ಕೇಳಿದನು:
ಸಂನ್ಯಾಸಂ ಕರ್ಮಣಾಮ್ ಕೃಷ್ಣ ಪುನಃ ಯೋಗಮ್ ಚ ಶಂಸಸಿ ।
ಯತ್ ಶ್ರೇಯಃ ಏತಯೋಃ ಏಕಮ್ ತತ್ ಮೇ ಬ್ರೂಹಿ ಸುನಿಶ್ಚಿತಮ್ -- ಕೃಷ್ಣಾ, ಒಮ್ಮೆ ಕರ್ಮಸಂನ್ಯಾಸವನ್ನು ಹೊಗಳುತ್ತಿ; ಮತ್ತೊಮ್ಮೆ ಕರ್ಮಯೋಗವನ್ನು. ಇವೆರಡರಲ್ಲಿ ಯಾವುದು ಮಿಗಿಲು ಅದನ್ನು ನನಗೆ ಖಚಿತವಾಗಿ ಹೇಳು.

ಅರ್ಜುನ ಕೇಳುತ್ತಾನೆ: "ಓ ಕೃಷ್ಣಾ, ನೀನು ಒಮ್ಮೆ ಹೋರಾಡು ಎನ್ನುತ್ತಿ, ಇನ್ನೊಮ್ಮೆ ಕರ್ಮಸಂನ್ಯಾಸ ಮಾಡು ಅನ್ನುತ್ತಿ . ಒಂದು ವೇಳೆ ಕರ್ಮಸಂನ್ಯಾಸ ಅಂದರೆ ಕರ್ಮತ್ಯಾಗವಾದರೆ ಇದು ಒಂದಕ್ಕೊಂದು ವಿರುದ್ಧ. ಇದರಲ್ಲಿ ಯಾವುದು ಶ್ರೇಯಸ್ಕರ ಎನ್ನುವುದನ್ನು ನಿಶ್ಚಿತವಾಗಿ ಹೇಳು" ಎಂದು. ಯುದ್ಧ ಮಾಡುವಾಗ ದ್ವಂದ್ವ ಅನ್ನುವುದು

ಇದ್ದೇ ಇದೆ. ದ್ವಂದ್ವತ್ಯಾಗದಿಂದ ಯುದ್ಧ ಮಾಡುವುದು ಹೇಗೆ? ಕರ್ಮಸಂನ್ಯಾಸ ಮತ್ತು ಕರ್ಮಯೋಗ ಇವೆರಡೂ ಒಟ್ಟಿಗೆ ಹೇಗೆ ಸಾಧ್ಯ? ಯುದ್ಧವೆಂದಮೇಲೆ ರಾಗ-ದ್ವೇಷ ಇದ್ದೇ ಇರುತ್ತದೆ. ಈ ಕಾರಣದಿಂದ ಕೃಷ್ಣನ ಮಾತು ನಮಗೆ ಖಚಿತವಾಗಿ ಅರ್ಥವಾಗುವುದಿಲ್ಲ. ಅದಕ್ಕಾಗಿ ಅರ್ಜುನ ಕೃಷ್ಣನಲ್ಲಿ ವಿವರವನ್ನು ಕೇಳುತ್ತಿದ್ದಾನೆ.

ಇಲ್ಲಿ ಅರ್ಜುನ ತನ್ನ ಪ್ರಶ್ನೆಯ ನಡುವೆ "ಕೃಷ್ಣಾ" ಎನ್ನುವ ಸಂಬೋಧನೆಯನ್ನು ಬಳಸಿದ್ದಾನೆ. 'ಕರ್ಷತಿ ಇತೀ ಕೃಷ್ಣಃ' ಎಲ್ಲರನ್ನೂ ತನ್ನೆಡೆಗೆ ಸೆಳೆಯುವ ಪಾದರಸ, ಸಂಸಾರದಿಂದ ಎತ್ತರಕ್ಕೆ ಕೊಂಡೊಯ್ಯುವ ಕರ್ಷಣಶಕ್ತಿಯಾದ ಸೌಂದರ್ಯಮೂರ್ತಿ ಭಗವಂತ ಕೃಷ್ಣಃ. ಅಜ್ಞಾನದಿಂದ ಬರುವ ಸಂಶಯವನ್ನು ಕರ್ಷಣೆಮಾಡಿ, ಜ್ಞಾನದ ಮಡಿಲಿಗೆ ಸೆಳೆಯುವ ನೀನು ನನಗೆ ಖಚಿತವಾಗಿ ಯಾವುದು ಶ್ರೇಯಸ್ಸು ಎನ್ನುವುದನ್ನು ತಿಳಿಸು ಎನ್ನುವ ಭಾವ ಈ ಸಂಬೋಧನೆಯಲ್ಲಿದೆ.

ಭಗವಾನುವಾಚ ।

ಸಂನ್ಯಾಸಃ ಕರ್ಮಯೋಗಶ್ಚ ನಿಃಶ್ರೇಯಸಕರಾವುಭೌ ।
ತಯೋಸ್ತು ಕರ್ಮಸಂನ್ಯಾಸಾತ್ ಕರ್ಮಯೋಗೋ ವಿಶಿಷ್ಯತೇ ॥೨॥

ಭಗವಾನುವಾಚ- ಭಗವಂತ ಹೇಳಿದನು

ಸಂನ್ಯಾಸಃ ಕರ್ಮಯೋಗಃ ಚ ನಿಃಶ್ರೇಯಸ ಕರೌ ಉಭೌ ।
ತಯೋಃ ತು ಕರ್ಮ ಸಂನ್ಯಾಸಾತ್ ಕರ್ಮಯೋಗಃ ವಿಶಿಷ್ಯತೇ -- ಕರ್ಮಸಂನ್ಯಾಸ ಮತ್ತು ಕರ್ಮಯೋಗ ಎರಡೂ ಒಳಿತಿನ ದಾರಿಗಳೇ. ಅವುಗಳಲ್ಲಿ ಕರ್ಮಸಂನ್ಯಾಸಕ್ಕಿಂತ ಕರ್ಮಯೋಗ ಮಿಗಿಲು.

ಜ್ಞೇಯಃ ಸ ನಿತ್ಯಸಂನ್ಯಾಸೀ ಯೋ ನ ದ್ವೇಷ್ಟಿ ನ ಕಾಂಕ್ಷತಿ ।
ನಿರ್ದ್ವಂದ್ವೋ ಹಿ ಮಹಾಬಾಹೋ ಸುಖಂ ಬಂಧಾತ್ ಪ್ರಮುಚ್ಯತೇ ॥೩॥

ಜ್ಞೇಯಃ ಸ ನಿತ್ಯಸಂನ್ಯಾಸೀ ಯಃ ನ ದ್ವೇಷ್ಟಿ ನ ಕಾಂಕ್ಷತಿ ।
ನಿರ್ದ್ವಂದ್ವಃ ಹಿ ಮಹಾಬಾಹೋ ಸುಖಮ್ ಬಂಧಾತ್ ಪ್ರಮುಚ್ಯತೇ -- ದ್ವೇಷಿಸದವನು, ಮತ್ತು ಬಯಸದವನು ನಿಜವಾದ ಸಂನ್ಯಾಸಿಯೆಂದರಿಯಬೇಕು. ಮಹಾವೀರಾ, ಇಂತಹ ದ್ವಂದ್ವಗಳನ್ನು ಗೆದ್ದವನು ಹಾಯಾಗಿ ಕರ್ಮ ಸೆರೆಯಿಂದ ಪಾರಾಗುತ್ತಾನೆ.

ಇಲ್ಲಿ ಅರ್ಜುನನ ಪ್ರಶ್ನೆಗೆ ಕೃಷ್ಣನ ಉತ್ತರ ಒಗಟಿನ ರೂಪದಲ್ಲಿದೆ. ಈ ಶ್ಲೋಕವನ್ನು ಎಚ್ಚರಿಕೆಯಿಂದ ಬಿಡಿಸಿ ಅರ್ಥೈಸಿಕೊಳ್ಳಬೇಕು. ಇಲ್ಲಿ ಹೇಳುವ ಸಂನ್ಯಾಸ ಸಂನ್ಯಾಸಾಶ್ರಮವಲ್ಲ. ಯಾರು ರಾಗ ದ್ವೇಷವನ್ನು ದಾಟಿ ನಿಲ್ಲುತ್ತಾನೋ ಅವನು ಸಂನ್ಯಾಸಿ. ಸ+ಅಹಂ+ನ್ಯಾಸ-ಸಂನ್ಯಾಸ. 'ಸ' ಅಂದರೆ ಸಂಪೂರ್ಣವಾದ, ಸಮೀಚೀನವಾದ, ದೋಷರಹಿತ ಮತ್ತು ಗುಣಪೂರ್ಣನಾದ ಭಗವಂತ. ಅವನಲ್ಲಿ ನಮ್ಮ ಅಹಂ(ರಾಗ ದ್ವೇಷ-ಅಹಂಕಾರ)ನ್ನು ನ್ಯಾಸ ಮಾಡುವುದು ಸಂನ್ಯಾಸ. ಕೃಷ್ಣ ಹೇಳುತ್ತಾನೆ: "ಕರ್ಮಯೋಗ ಕರ್ಮಸಂನ್ಯಾಸಕ್ಕಿಂತ ಮಿಗಿಲು" ಎಂದು. ಏಕೆಂದರೆ ಇಲ್ಲಿ ಅರ್ಜುನ 'ನನಗೆ ಕೌರವರ ಮೇಲೆ ದ್ವೇಷವಿಲ್ಲ, ನಾವೇ ಗೆಲ್ಲಬೇಕು ಎನ್ನುವ

ಬಯಕೆ ಇಲ್ಲ, ನನಗೆ ಯಾವ ಫಲದ ಆಸೆಯೂ ಇಲ್ಲ' ಎಂದು ಯುದ್ಧ ಮಾಡದೇ ನಿರ್ಲಿಪ್ತನಾಗಿ-ನಿಷ್ಕ್ರೀಯನಾಗಿ ಕುಳಿತರೆ ಅದು ಕರ್ಮಸಂನ್ಯಾಸವಾಗುತ್ತದೆ. ಆದರೆ ಹೀಗೆ ಸುಮ್ಮನೆ ಕುಳಿತರೆ ಕರ್ತವ್ಯಕರ್ಮ(ಕರ್ಮಯೋಗ) ಮಾಡಿದಂತಾಗುವುದಿಲ್ಲ . ಇದರಿಂದಾಗಿ ಅಧರ್ಮಕ್ಕೆ ಜಯವಾಗುತ್ತದೆ. ಆದ್ದರಿಂದ ಕರ್ಮಸಂನ್ಯಾಸ ಮತ್ತು ಕರ್ಮಯೋಗ ಜೊತೆ-ಜೊತೆಯಾಗಿರಬೇಕು. ಕರ್ಮಯೋಗವಿಲ್ಲದ ಕರ್ಮಸಂನ್ಯಾಸ ಎಂದೂ ಶ್ರೇಯಸ್ಸನ್ನು ತರುವುದಿಲ್ಲ ಎನ್ನುವುದು ಕೃಷ್ಣನ ಉತ್ತರ.

ಸಂನ್ಯಾಸ ಅನ್ನುವುದು ಅರ್ಥಪೂರ್ಣವಾಗಬೇಕಾದರೆ ಕಾಮ ಕ್ರೋಧಗಳ ತ್ಯಾಗದ ಜೊತೆಗೆ ಕ್ರಿಯೆ ಇರಬೇಕು. ಹೋರಾಡಬೇಕು-ಆದರೆ ರಾಗದ್ವೇಷದಿಂದಲ್ಲ. ಕ್ರಿಯೆ ಇಲ್ಲದೆ ರಾಗ-ದ್ವೇಷ ತ್ಯಾಗಕ್ಕೆ ಅರ್ಥವಿಲ್ಲ. ಆದ್ದರಿಂದ ದ್ವಂದ್ವಾತೀತವಾಗಿ ಕರ್ಮ ಮಾಡಬೇಕು ಎನ್ನುವುದು ಕೃಷ್ಣನ ಸಂದೇಶ.

ನಮ್ಮ ಜೀವನವೇ ಒಂದು ಹೋರಾಟ. ಇಲ್ಲಿ ನಮ್ಮ ಕರ್ತವ್ಯಕರ್ಮದಿಂದ ದೂರ ಸರಿದು, ರಾಗ-ದ್ವೇಷ, ಕಾಮ-ಕ್ರೋಧವನ್ನು ಬಿಟ್ಟು, ನಿಷ್ಕ್ರೀಯನಾಗಿ, 'ಕರ್ಮಸಂನ್ಯಾಸವನ್ನು ಸಾಧಿಸಿದೆ' ಎಂದುಕೊಂಡರೆ ನಮ್ಮ ಜೀವನ ವ್ಯರ್ಥ. ಅದರಿಂದ ಎಂದೂ ಶ್ರೇಯಸ್ಸಿಲ್ಲ ಮತ್ತು ಮೋಕ್ಷವಿಲ್ಲ. ರಾಗ-ದ್ವೇಷ ತ್ಯಾಗದ ಜೊತೆಗೇ, ಬದುಕು ಎನ್ನುವ ಜೀವನ ಸಂಗ್ರಾಮದಲ್ಲಿ ನಮ್ಮ ಕರ್ತವ್ಯಕರ್ಮದ ಮುಖೇನ ಹೋರಾಟ ಮಾಡುವುದೇ ನಿಜವಾದ ಜೀವನಧರ್ಮ. ಈ ರೀತಿ ದ್ವಂದ್ವಾತೀತ ಬದುಕನ್ನು ಬಾಳುವವನು ಕರ್ಮದ ಸೆರೆಯಿಂದ ಪಾರಾಗುತ್ತಾನೆ.

ಇಲ್ಲಿ ಕೃಷ್ಣ ಅರ್ಜುನನನ್ನು ಮಹಾಬಾಹು ಎಂದು ಸಂಬೋಧಿಸಿದ್ದಾನೆ. ಹಿಂದೆ ಹೇಳಿದಂತೆ ಮಹಾಬಾಹು ಎಂದರೆ ಮಹಾವೀರ ಎನ್ನುವುದು ಮೇಲ್ನೋಟದ ಅರ್ಥ. ಇಲ್ಲಿ ಈ ವಿಶೇಷಣಕ್ಕೆ ವಿಶೇಷ ಅರ್ಥವಿದೆ. 'ಮಹಾಬಾ' ಅಂದರೆ ರಾಗ-ದ್ವೇಷ, ಮತ್ತು ಕಾಮನೆಗಳ ಮಡುವಿನಲ್ಲಿರುವವ. ಇಂತಹ ಮಹತ್ತರವಾದ ರಾಗ-ದ್ವೇಷಗಳನ್ನು ತ್ಯಾಗ ಮಾಡಿದವ ಮಹಾಬಾಹು. "ನಿನ್ನಲ್ಲಿ ಕರ್ಮಸಂನ್ಯಾಸವಿದೆ, ಅದರ ಜೊತೆಗೆ ಕರ್ಮಯೋಗ ಮಾಡಲು ಅರ್ಹತೆಯುಳ್ಳ ಮಹಾವೀರ ನೀನು" ಎನ್ನುವ ಧ್ವನಿ ಈ ಸಂಬೋಧನೆಯಲ್ಲಿದೆ. ನಮ್ಮ ಜೀವನ ಸಂಗ್ರಾಮದಲ್ಲಿ ರಾಗ-ದ್ವೇಷಗಳನ್ನು ಬಿಟ್ಟು ಕರ್ಮ ಮಾಡಬೇಕು. ಕರ್ಮಸಂನ್ಯಾಸ ಮತ್ತು ಕರ್ಮಯೋಗ ಎರಡೂ ಒಟ್ಟಿಗಿರಬೇಕು ಎನ್ನುವುದು ಮೂಲ ಸಂದೇಶ. ಅದಕ್ಕೆ ಹೊಂದಿಕೆಯಾಗುವಂತೆ ಇಲ್ಲಿ 'ಮಹಾಬಾಹು' ಎನ್ನುವ ವಿಶೇಷಣ ಬಳಕೆಯಾಗಿದೆ.

ಸಾಂಖ್ಯಯೋಗೌ ಪೃಥಗ್ ಬಾಲಾಃ ಪ್ರವದಂತಿ ನ ಪಂಡಿತಾಃ ।
ಏಕಮಪ್ಯಾಸ್ಥಿತಃ ಸಮ್ಯಗುಭಯೋರ್ವಿಂದತೇ ಫಲಮ್ ॥೪॥

ಸಾಂಖ್ಯ ಯೋಗೌ ಪೃಥಕ್ ಬಾಲಾಃ ಪ್ರವದಂತಿ ನ ಪಂಡಿತಾಃ ।
ಏಕಮ್ ಅಪಿ ಅಸ್ಥಿತಃ ಸಮ್ಯಕ್ ಉಭಯೋಃ ವಿಂದತೇ ಫಲಮ್ -- ಜ್ಞಾನ ಮತ್ತು ಕರ್ಮದ ದಾರಿ ಬೇರೆಬೇರೆ [ಒಂದು ಸಂನ್ಯಾಸಿಗಳಿಗೆ ಹಾಗೂ ಇನ್ನೊಂದು ಸಂಸಾರಿಗಳಿಗೆ] ಎಂದು ನುಡಿದವರು ಬಾಲಿಷರು[ತಿಳಿಗೇಡಿಗಳು]; ತಿಳಿದವರಲ್ಲ. ಯಾವುದೇ ಒಂದು ದಾರಿಯಲ್ಲಿ ಸರಿಯಾಗಿ ನಡೆದವನು ಎರಡರ ಫಲವನ್ನೂ ಪಡೆಯುತ್ತಾನೆ.

ಹಿಂದೆ ಕರ್ಮಸಂನ್ಯಾಸ ಮತ್ತು ಕರ್ಮಯೋಗವನ್ನು ವಿವರಿಸಿದಂತೆ ಕೃಷ್ಣ ಇಲ್ಲಿ ಸಾಂಖ್ಯವನ್ನು(ಜ್ಞಾನ-Spiritual Wisdom) ಮತ್ತು ಯೋಗವನ್ನು(ಅನುಷ್ಠಾನ-Spiritual Practice) ವಿವರಿಸುತ್ತಾನೆ. ಶಾಸ್ತ್ರದಲ್ಲಿ ಸಾಂಖ್ಯ(ಸಮ್ಯಕ್

ಖ್ಯಾತಿ) ಎಂದರೆ ಗಣಿತವಲ್ಲ; ಅದು ಶುದ್ಧ ಆತ್ಮತತ್ವವಿಜ್ಞಾನ-ಭಗವಂತನ ಜ್ಞಾನ. ಯಾರ ಅಂಕೆಯಲ್ಲಿ ಈ ಇಡೀ ಜಗತ್ತು ನಡೆಯುತ್ತಿದೆಯೋ ಅವನ ಅರಿವು. ಇದನ್ನು ತಿಳಿಯದೇ ಇರುವವರನ್ನು ಕೃಷ್ಣ ಬಾಲಿಷರು ಹಾಗೂ ಅಂತವರ ಮಾತಿಗೆ ಮೂಲ ಆಧಾರ ಎನ್ನುವುದಿಲ್ಲ ಎನ್ನುತ್ತಾನೆ. ಇಷ್ಟು ಹೇಳಿ ಕೃಷ್ಣ ಹೇಳುತ್ತಾನೆ "ಏಕಮಪ್ಯಾಸ್ಥಿತಃ ಸಮ್ಯಗುಭಯೋರ್ವಿಂದತೇ ಫಲಮ್" ಎಂದು. ಅಂದರೆ 'ಯಾವುದೇ ಒಂದನ್ನು ನೀನು ಚೆನ್ನಾಗಿ ಆಚರಣೆಗೆ ತಂದರೂ, ಎರಡರ ಫಲವನ್ನೂ ಪಡೆಯುತ್ತಿ' ಎಂದರ್ಥ. ಇಲ್ಲಿ ಪುನಃ ನಮಗೆ ಗೊಂದಲವಾಗಬಹುದು. ಇದರರ್ಥ ಜ್ಞಾನವನ್ನು ಮಾತ್ರ ಅಥವಾ ಕರ್ಮವನ್ನು ಮಾತ್ರ ಆಚರಣೆ ಮಾಡುವುದು ಎಂದಲ್ಲ. ನಾವು ಕರ್ಮವನ್ನು ಚೆನ್ನಾಗಿ ಮಾಡುವದು ಎಂದರೆ ತಿಳಿದು ಜ್ಞಾನಪೂರ್ವಕವಾಗಿ ಮಾಡುವದು. ಅದೇ ರೀತಿ ಜ್ಞಾನ ಚೆನ್ನಾಗಿರುವುದು ಎಂದರೆ ತಿಳಿದದ್ದನ್ನು ಅನುಷ್ಠಾನಗೊಳಿಸುವುದು. ಆದ್ದರಿಂದ ಒಂದು 'ಜ್ಞಾನಪ್ರಧಾನ' ಇನ್ನೊಂದು 'ಕರ್ಮಪ್ರಧಾನ'ವಾಗಿರಬಹುದು. ಆದರೆ ಒಂದು ಇನ್ನೊಂದಕ್ಕೆ ಪೂರಕ. ಯಾರು ಇದನ್ನು ತಿಳಿದಿದ್ದಾರೋ ಅವರು ಪಂಡಿತರು ಹಾಗೂ ಅವರು ನಿಜವಾದ ಫಲವನ್ನು ಪಡೆಯುತ್ತಾರೆ.

ಯತ್ ಸಂಖ್ಯೈಃ ಪ್ರಾಪ್ಯತೇ ಸ್ಥಾನಂ ತದ್ ಯೊಗೈರಪಿ ಗಮ್ಯತೇ ।
ಏಕಂ ಸಾಂಖ್ಯಂ ಚ ಯೋಗಂ ಚ ಯಃ ಪಶ್ಯತಿ ಸ ಪಶ್ಯತಿ ॥೫॥

ಯತ್ ಸಂಖ್ಯೈಃ ಪ್ರಾಪ್ಯತೇ ಸ್ಥಾನಮ್ ತತ್ ಯೋಗ್ಯೈಃ ಅಪಿ ಗಮ್ಯತೇ ।
ಏಕಮ್ ಸಾಂಖ್ಯಮ್ ಚ ಯೋಗಮ್ ಚ ಯಃ ಪಶ್ಯತಿ ಸಃ ಪಶ್ಯತಿ -- ಜ್ಞಾನಯೋಗಿಗಳು ಪಡೆಯುವ ತಾಣದೆಡೆ ಕರ್ಮಯೋಗಿಗಳೂ ನಡೆಯುತ್ತಾರೆ. ಜ್ಞಾನ ಮತ್ತು ಕರ್ಮದ ದಾರಿಗಳ ಗುರಿ ಒಂದೇ ಎಂದು ತಿಳಿದವನೇ ನಿಜವಾಗಿ ತಿಳಿದವನು.

ಜ್ಞಾನಿಗಳು ತಮಗೋಸ್ಕರವಲ್ಲದೆ ಲೋಕಕ್ಕೆ ಮಾರ್ಗದರ್ಶನ ಮಾಡುವ ಸಲುವಾಗಿಯೂ ಕರ್ಮ ಮಾಡಬೇಕಾಗುತ್ತದೆ. ಏಕೆಂದರೆ ಸಮಾಜ ಅವರನ್ನು ಅನುಸರಿಸುತ್ತದೆ. ಇದು ಅವರ ಮೇಲಿರುವ ಸಾಮಾಜಿಕ ಜವಾಬ್ದಾರಿ. ಆದ್ದರಿಂದ ಜ್ಞಾನ ಮತ್ತು ಕರ್ಮ ಒಂದಕ್ಕೊಂದು ಪೂರಕ. ಜ್ಞಾನಪ್ರದ ಮತ್ತು ಕರ್ಮಪ್ರದ ಈ ಮಾರ್ಗದ ಗುರಿ ಒಂದೇ. ಜ್ಞಾನಪ್ರಧಾನವಾಗಿ ಕರ್ಮ ಮಾಡುವ ಋಷಿಗಳು, ದೇವತೆಗಳು, ಮತ್ತು ಕರ್ಮಪ್ರಧಾನವಾಗಿ ಜ್ಞಾನದಿಂದ ಕರ್ಮಮಾಡುವವರು ಸೇರುವ ಗುರಿ ಒಂದೇ-ಅದು ಆ ಭಗವಂತನನ್ನು. ಇಲ್ಲಿ ಕರ್ಮಸಂನ್ಯಾಸವೇ ಬೇರೆ ಮತ್ತು ಕರ್ಮಯೋಗವೇ ಬೇರೆ ಎನ್ನುವುದು ಅರ್ಥಶೂನ್ಯ. ಇವೆರಡೂ ಒಂದಕ್ಕೊಂದು ಪೂರಕ. ಯಾರು ಈ ಸತ್ಯವನ್ನು ತಿಳಿದಿದ್ದಾರೋ ಅವರು'ತಿಳಿದವರು'

ಸಂನ್ಯಾಸಸ್ತು ಮಹಾಬಾಹೋ ದುಃಖಮಾಪ್ತುಮಯೋಗತಃ ।
ಯೋಗಯುಕ್ತೋ ಮುನಿರ್ಬ್ರಹ್ಮನ ಚಿರೇಣಾಧಿಗಚ್ಛತಿ ॥೬॥

ಸಂನ್ಯಾಸಃ ತು ಮಹಾಬಾಹೋ ದುಃಖಮ್ ಆಪ್ತುಮ್ ಅಯೋಗತಃ ।

ಯೋಗ ಯುಕ್ತಃ ಮುನಿಃ ಬ್ರಹ್ಮ ನ ಚಿರೇಣ ಅಧಿಗಚ್ಛತಿ-ಓ ಮಹಾವೀರಾ, ಕರ್ಮಯೋಗವಿರದ ಬರಿಯ ಸಂನ್ಯಾಸ [ದ್ವಂದ್ವ ತ್ಯಾಗ] ಬನ್ನವನ್ನೇ ತಂದೀತು.[ಭಗವಂತನ ಪೂಜೆಯೆಂದು ಕರ್ಮ ಮಾಡುವ ಬದಲು ಕರ್ಮವನ್ನೇ ತೊರೆಯುವುದು ನರಕದ ದಾರಿ]. ಕರ್ಮ ಮಾಡುತ್ತಾ ದ್ವಂದ್ವವನ್ನು ಗೆದ್ದವನು ಭಗವಂತನನ್ನು ಪಡೆಯಲು ತಡವಾಗದು.

ಕರ್ಮಯೋಗವಿಲ್ಲದ ಬರಿಯ ದ್ವಂದ್ವತ್ಯಾಗ [ಸಂನ್ಯಾಸ] ವ್ಯರ್ಥ. ಶಾಸ್ತ್ರವನ್ನು ಓದಿ ನನಗೆ ಜ್ಞಾನ ಬಂತು, ನಾನು ದ್ವಂದ್ವಾತೀತ, ನನಗೆ ಯಾವ ಕರ್ಮವೂ ಬೇಕಾಗಿಲ್ಲ ಎಂದು ತಿಳಿದು ನಿಷ್ಕ್ರೀಯನಾದರೆ ಅದು ನಮ್ಮನ್ನು ಅಧೋಗತಿಗೆ ತಳ್ಳುತ್ತದೆ. ಆದರೆ ದ್ವಂದ್ವಾತೀತನಾಗಿ ಕಾಮಕ್ರೋಧವನ್ನು ಗೆದ್ದು ಜ್ಞಾನಪೂರ್ವಕವಾಗಿ ಕರ್ಮ ಮಾಡಿದರೆ ಅದರಿಂದ ಮೋಕ್ಷ ನಿಶ್ಚಿತ.

ಯೋಗಯುಕ್ತೋ ವಿಶುದ್ಧಾತ್ಮಾ ವಿಜಿತಾತ್ಮಾ ಜಿತೇಂದ್ರಿಯಃ ।
ಸರ್ವಭೂತಾತ್ಮಭೂತಾತ್ಮಾ ಕುರ್ವನ್ನಪಿ ನ ಲಿಪ್ಯತೇ ॥೭॥

ಯೋಗಯುಕ್ತಃ ವಿಶುದ್ಧ ಆತ್ಮಾ ವಿಜಿತ ಆತ್ಮಾ ಜಿತ ಇಂದ್ರಿಯಃ ।
ಸರ್ವ ಭೂತ ಆತ್ಮಭೂತ ಆತ್ಮಾ ಕುರ್ವನ್ ಅಪಿ ನ ಲಿಪ್ಯತೇ-- ಕರ್ಮಯೋಗದಲ್ಲಿ ತೊಡಗಿದವನು, ತಿಳಿಯಾದ ಬಗೆಯವನು, ಬಗೆಯ ಗೆದ್ದವನು. ಇಂದ್ರಿಯಗಳನ್ನೂ ಗೆದ್ದವನು. ಎಲ್ಲಾ ಜೀವಿಗಳನ್ನು ಪೊರೆವ ಭಗವಂತ ತನ್ನ ದೊರೆಯೆಂದು ತಿಳಿದವನು.[ಭಗವಂತನಲ್ಲೇ ಬಗೆ ನೆಟ್ಟವನು]. ಮಾಡಿದರೂ ಅಂಟಿಸಿಕೊಳ್ಳುವುದಿಲ್ಲ.

ಕರ್ಮಯೋಗದಲ್ಲಿ ತೊಡಗಿದವನು ತನ್ನ ಮನೋನಿಗ್ರಹ ಮಾಡಿ ಶುದ್ಧವಾದ ಮನಸ್ಸಿನಿಂದ ಶುದ್ಧಕರ್ಮವನ್ನು ಮಾಡಬೇಕು. ಮನಸ್ಸನ್ನು ಗೆಲ್ಲಬೇಕಾದರೆ ಭಗವಂತನ ಒಲವು ಬೇಕು. ಮನಸ್ಸನ್ನು ಗೆದ್ದವನು ಇಂದ್ರಿಯಗಳನ್ನು ಗೆಲ್ಲುತ್ತಾನೆ-ಅದರಿಂದ ಆತ್ಮ ಶುದ್ಧಿಯಾಗುತ್ತದೆ. ಆಗ ಸರ್ವಭೂತಗಳಿಗೂ ಆತ್ಮಭೂತನಾದ ಭಗವಂತನೇ ನನ್ನ ಆತ್ಮ ಎನ್ನುವ ಅರಿವಾಗುತ್ತದೆ. ಸರ್ವಗತ, ಸರ್ವನಿಯಾಮಕ ಭಗವಂತ ನನ್ನೊಳಗೂ ಇದ್ದಾನೆ, ಅವನೇ ವಿಶ್ವನಿಯಾಮಕನಾಗಿ ವಿಶ್ವದಲ್ಲಿ ತುಂಬಿದ್ದಾನೆ. ಜಗತ್ತನ್ನು ನಿಯಂತ್ರಿಸುವ ಅನಂತಶಕ್ತಿ ಅಣೋರಣೀಯವಾಗಿ ನನ್ನ ಜೀವಸ್ವರೂಪದೊಳಗೂ ತುಂಬಿದೆ ಎನ್ನುವ ಅನುಷ್ಠಾನದಿಂದ, ಸರ್ವಭೂತಗಳಲ್ಲಿ ಅಂತರ್ಯಾಮಿಯಾದ ಭಗವಂತನಲ್ಲಿ ಮನಸ್ಸನ್ನು ನೆಲೆಗೊಳಿಸಿ ಕರ್ಮ ಮಾಡಿದಾಗ, ನಮಗೆ ಕರ್ಮ ಅಂಟಿಕೊಳ್ಳುವುದಿಲ್ಲ.

ಕರ್ಮಸಂನ್ಯಾಸ ಮತ್ತು ಕರ್ಮಯೋಗ ಎರಡನ್ನು ಬೆರೆಸಿ ಜೀವನದಲ್ಲಿ ಕರ್ಮಾನುಷ್ಠಾನ ಮಾಡಬೇಕು ಎಂದು ವಿವರಿಸಿದ ಕೃಷ್ಣ, ನಮ್ಮ ದೈನಂದಿನ ಜೀವನದಲ್ಲಿ ಈ ರೀತಿಯ ಕರ್ಮಾನುಷ್ಠಾನ ಅಂದರೆ ಏನು ಎನ್ನುವುದರ ವಿವರಣೆಯನ್ನು ಮುಂದಿನ ಶ್ಲೋಕದಲ್ಲಿ ಕೊಡುತ್ತಾನೆ.

ನೈವ ಕಿಂಚಿತ್ ಕರೋಮೀತಿ ಯುಕ್ತೋ ಮನ್ಯೇತ ತತ್ತ್ವವಿತ್।

ಪಶ್ಯನ್ ಶೃಣ್ವನ್ ಸ್ಪೃಶನ್ ಜಿಘ್ರನ್ನಶ್ನನ್ ಗಚ್ಛನ್ ಸ್ವಪನ್ ಶ್ವಸನ್ ॥೮॥

ಪ್ರಲಪನ್ ವಿಸೃಜನ್ ಗೃಹ್ಣನ್ನುನ್ಮಿಷನ್ ನಿಮಿಷನ್ನಪಿ ।
ಇಂದ್ರಿಯಾಣೀಂದ್ರಿಯಾರ್ಥೇಷು ವರ್ತಂತ ಇತಿ ಧಾರಯನ್ ॥೯॥

ನ ಏವ ಕಿಂಚಿತ್ ಕರೋಮಿ ಇತಿ ಯುಕ್ತಃ ಮನ್ಯೇತ ತತ್ತ್ವ ವಿತ್।
ಪಶ್ಯನ್ ಶೃಣ್ವನ್ ಸ್ಪೃಶನ್ ಜಿಘ್ರನ್ ಅಶ್ನನ್ ಗಚ್ಛನ್ ಸ್ವಪನ್ ಶ್ವಸನ್ ||
ಪ್ರಲಪನ್ ವಿಸೃಜನ್ ಗೃಹ್ಣನ್ ಉನ್ಮಿಷನ್ ನಿಮಿಷನ್ ಅಪಿ ।
ಇಂದ್ರಿಯಾಣಿ ಇಂದ್ರಿಯ ಅರ್ಥೇಷು ವರ್ತಂತೇ ಇತಿ ಧಾರಯನ್ - ನಿಜವರಿತ ಸಾಧಕ ತಾನಾಗಿ ಏನೂ ಮಾಡುತ್ತಿಲ್ಲ ಎಂದು ತಿಳಿಯಬೇಕು- ಕಾಣುವಾಗ, ಕೇಳುವಾಗ, ಮುಟ್ಟುವಾಗ, ಮೂಸುವಾಗ, ತಿನ್ನುವಾಗ, ತಿರುಗುವಾಗ, ಮಲಗುವಾಗ, ಉಸಿರುವಾಗ, ಉಸುರುವಾಗ, ಕಳೆಯುವಾಗ, ಕೊಳ್ಳುವಾಗ, ಎವೆ ಮುಚ್ಚುವಾಗ, ಎವೆ ಬಿಚ್ಚುವಾಗ ಕೂಡಾ-ಇಂದ್ರಿಯಗಳು ತಮ್ಮ ಕೆಲಸದಲ್ಲಿ ತೊಡಗಿವೆ ಎಂದು ಭಾವಿಸುತ್ತಾ.

ನಮ್ಮ ಜೀವನದಲ್ಲಿ ದೇವರಪೂಜೆ ಮಾತ್ರ ಅನುಷ್ಠಾನವಲ್ಲ. ನಮ್ಮ ಪ್ರತಿಯೊಂದು ನಡೆಯೂ ಒಂದು ಕರ್ಮಯೋಗವಾಗಬೇಕು. ಯಾವುದೋ ಕಾಲ ವಿಶೇಷದಲ್ಲಿ ಮಾತ್ರ ದೇವರ ಪೂಜೆ ಮಾಡುವುದಲ್ಲ. ನಮ್ಮ ಇಡೀ ಬದುಕೇ ಒಂದು ಯಜ್ಞವಾಗಬೇಕು. ಯಜ್ಞವನ್ನು ಕನ್ನಡದಲ್ಲಿ 'ಬೇಳುವೆ' ಎನ್ನುತ್ತಾರೆ. ನಮ್ಮ ಬಾಳುವೆಯೇ ಒಂದು ಬೇಳುವೆಯಾಗಬೇಕು.

ಕರ್ಮಾನುಷ್ಠಾನ ಮಾಡುವವನು "ನಾನು ನಾನಾಗಿ ಏನನ್ನೂ ಮಾಡುತ್ತಿಲ್ಲ, ನನ್ನದು ಇಚ್ಛಾಪೂರ್ವಕ ಕೃತಿ ಆದರೆ ಇಲ್ಲಿ ನನಗೆ ಸ್ವಾತಂತ್ರವಿಲ್ಲ" ಎನ್ನುವ ಸತ್ಯವನ್ನು ಅರಿತಿರಬೇಕು. ನಾವು ಮಾಡಬೇಕು ಎಂದುಕೊಂಡದ್ದನ್ನು ನಮ್ಮಿಂದ ಮಾಡಲು ಆಗುವುದಿಲ್ಲ, ನಾವು ಬಯಸಿದ್ದು ಸಿಗುವುದಿಲ್ಲ, ಫಲದಲ್ಲಿ ನಮಗೆ ಸ್ವಾತಂತ್ರ್ಯವಿಲ್ಲ. ಇದು ಪ್ರತಿಯೊಬ್ಬರ ಅನುಭವಕ್ಕೆ ಬರುವ ವಿಚಾರ. ಆದರೆ ಕ್ರಿಯೆ ಮಾತ್ರ ನಮ್ಮ ಮುಖೇನ ಆಗುತ್ತಿರುತ್ತದೆ.

'ನಾನು ಇಂತಹದ್ದೇ ಸಿಗಬೇಕು, ಇಂತಾದ್ದು ಸಿಗಬಾರದು ಎನ್ನುವ ಇಚ್ಛೆಯಿಂದಾಗಲೀ, ನಾನು ಮಾಡುತ್ತಿದ್ದೇನೆ ಎನ್ನುವ ಅಹಂಕಾರದಿಂದಾಗಲೀ ಮಾಡುತ್ತಿಲ್ಲ; ನನ್ನೊಳಗಿರುವ ಭಗವಂತ ಇದನ್ನು ಮಾಡಿಸುತ್ತಿದ್ದಾನೆ' ಎಂದು ತತ್ವಜ್ಞಾನಿ ತಿಳಿದಿರುತ್ತಾನೆ. ಆದ್ದರಿಂದ ಯಾವುದರಲ್ಲೂ "ನಾನು, ನನ್ನದು" ಎನ್ನುವ ಅಹಂಕಾರ ಅವನಿಗಿರುವುದಿಲ್ಲ. ಎಲ್ಲವೂ ಭಗವಂತನ ಇಚ್ಛೆಯಂತೆ ನಡೆಯುತ್ತದೆ ಹೊರತು ಇಲ್ಲಿ ನಾವು ಸ್ವತಂತ್ರ ಕರ್ತಾರರಲ್ಲ ಎನ್ನುವ ನಿಜವನ್ನರಿತು ಆತ ತನ್ನ ಕ್ರಿಯೆಯನ್ನು ಮಾಡುತ್ತಾನೆ.

ಪಶ್ಯನ್-ನೋಡುವಾಗ, ಶೃಣ್ವನ್-ಕೇಳುವಾಗ, ಸ್ಪೃಶನ್-ಸ್ಪರ್ಶದಲ್ಲಿ, ಜಿಘ್ರನ್-ಮೂಸುವಾಗ, ಅಶ್ನನ್-ತಿನ್ನುವಾಗ, ಗಚ್ಛನ್-ತಿರುಗುವಾಗ, ಸ್ವಪನ್-ಮಲಗುವಾಗ, ಶ್ವಸನ್-ಉಸಿರಿನಲ್ಲಿ, ಪ್ರಲಪನ್-ಮಾತಿನಲ್ಲಿ, ವಿಸೃಜನ್-ವಿಸರ್ಜಿಸುವಾಗ, ಗೃಹ್ಣನ್-ಸ್ವೀಕರಿಸುವಾಗ, ಉನ್ಮಿಷನ್-ತೆರೆಯುತ್ತಾ, ನಿಮಿಷನ್-ಮುಚ್ಚುತ್ತಾ, ಹೀಗೆ ತನ್ನೆಲ್ಲಾ ಕ್ರಿಯೆಯಲ್ಲಿ ತಾನೇನೂ ಮಾಡುತ್ತಿಲ್ಲ ಅನ್ನುವ ಅರಿವನ್ನು ತತ್ವಜ್ಞಾನಿ ತಿಳಿದಿರುತ್ತಾನೆ. ಉದಾಹರಣೆಗೆ-ನಾವು ಒಂದು ಹೂವಿನ ಅಂದವನ್ನು ಕಣ್ಣಿನಿಂದ ಸವಿಯುತ್ತೇವೆ; ಅದರ ಪರಿಮಳವನ್ನು ಮೂಗಿನಿಂದ ಮೂಸಿ

ಆಸ್ವಾಧಿಸುತ್ತೇವೆ; ಆ ಹೂವನ್ನು ಮುಟ್ಟಿ-ಮುಡಿದು ಸಂತೋಷ ಪಡುತ್ತೇವೆ. ಈ ಹೂವನ್ನು ಸೃಷ್ಟಿಸಿದವ, ಅದಕ್ಕೆ ಅಂದವನ್ನು ಕೊಟ್ಟವ ಆ ಭಗವಂತ. ಆ ಹೂವನ್ನು ನೋಡುವ ಕಣ್ಣನ್ನು ನಮಗೆ ಕೊಟ್ಟವ ಆತ(ಹುಟ್ಟು ಕುರುಡನಿಗೆ ಈ ಯೋಗವಿಲ್ಲ). ಈ ಅನುಸಂಧಾನವಿದ್ದರೆ ನೋಡುವ-ಮುಟ್ಟುವ-ಮೂಸವ ಕ್ರಿಯೆಯಲ್ಲಿ 'ನನ್ನದು' ಎನ್ನುವ ಅಹಂಕಾರಕ್ಕೆ ಎಡೆಯಿಲ್ಲ. ಅದೇ ರೀತಿ-ತಿನ್ನುವುದು: ಈ ಪ್ರಪಂಚದಲ್ಲಿ ಎಷ್ಟೋ ಜನ ಒಂದು ಹೊತ್ತಿನ ಆಹಾರಕ್ಕೂ ಗತಿ ಇಲ್ಲದೇ ಇನ್ನೊಬ್ಬರ ಮುಂದೆ ಕೈಚಾಚಿಕೊಂಡು ಬದುಕುತ್ತಾರೆ. ಆದರೆ ನಮಗೆ ಭಗವಂತ ಮೂರು ಹೊತ್ತಿನ ತುತ್ತಿಗೆ ಅನುಕೂಲ ಮಾಡಿ ಕೊಟ್ಟಿದ್ದಾನೆ ಅನ್ನುವ ಅನುಸಂಧಾನದಿಂದ ಊಟ ಮಾಡಿದಾಗ ಅದೊಂದು ಯಜ್ಞವಾಗುತ್ತದೆ. ಇನ್ನು-ನಿದ್ದೆ: ನಿದ್ದೆಯಲ್ಲಿ ನಾವು ಭಗವಂತನ ಸಮೀಪದಲ್ಲಿರುತ್ತೇವೆ. ಆದರೆ ಆ ಎಚ್ಚರ ನಮಗಿರುವುದಿಲ್ಲ. ಒಂದು ವೇಳೆ ನಿದ್ದೆಯೇ ಬಾರದಿದ್ದರೆ? ಇಡೀ ರಾತ್ರಿ ಕನಸಿನಲ್ಲೇ ಕಳೆದರೆ? ಇದನ್ನು ನಮ್ಮಿಂದ ಊಹಿಸುವುದೂ ಕಷ್ಟ. ಹುಟ್ಟಿದಾಗ ನಮಗರಿವಿಲ್ಲದಂತೆ ಉಸಿರಾಟ ಆರಂಭವಾಯಿತು. ನಿದ್ದೆಯಲ್ಲೂ ನಮಗರಿವಿಲ್ಲದಂತೆ ನಮ್ಮ ಉಸಿರಿನ ಕ್ರಿಯೆ ನಿರಂತರ. ಆದರೆ ಈ ಉಸಿರು ಯಾವಾಗ ನಿಲ್ಲುತ್ತದೆ ಎನ್ನುವುದು ನಮಗೆ ತಿಳಿದಿಲ್ಲ. ಹೀಗೆ ಪ್ರತಿಯೊಂದು ಕ್ರಿಯೆಯಲ್ಲಿ ಆ ವಿಶ್ವಶಕ್ತಿಯ ಅನುಸಂಧಾನವೇ ನಿಜವಾದ ಕರ್ಮಯೋಗ.

ಭಗವಂತ ನಮಗೆ ಅಮೂಲ್ಯವಾದ ಕೈ ಕೊಟ್ಟಿದ್ದಾನೆ. ಪ್ರಾಣಿಗಳಿಗೆ ನಾಲ್ಕೂ ಕಾಲೇ. ಕೈ ಇಲ್ಲ. ತನ್ನ ಮೈ ಮೇಲೆ ಯಾವುದೋ ಜೀವಿ ಕುಳಿತು ರಕ್ತ ಹೀರುತ್ತಿದ್ದರೂ ಅದನ್ನು ಓಡಿಸುವ ಕೈ ಅವುಗಳಿಗಿಲ್ಲ. ಇಂತಹ ಅಮೂಲ್ಯವಾದ ಕೈಯನ್ನು ಭಗವಂತ ನಮಗೆ ಕರುಣಿಸಿದ್ದಾನೆ. ಅತ್ಯಂತ ಸೂಕ್ಷ್ಮ ಇಂದ್ರಿಯವಾದ ಕಣ್ಣನ್ನು ರಕ್ಷಿಸುವ ರೆಪ್ಪೆಗಳು, ಅವು ನಿರಂತರ ತೆರೆಯವುದು-ಬಿಚ್ಚುವುದರಿಂದ ಕಣ್ಣಿನ ರಕ್ಷಣೆ. ಒಂದು ವೇಳೆ, ಕಣ್ಣಿಗೆ ಏನಾದರೂ ಕಸ ಬಿದ್ದರೆ ನಮಗರಿವಿಲ್ಲದಂತೆ ಕಣ್ಣಿಗೆ ನೀರಿನ ಸರಬರಾಜಾಗಿ ಕಣ್ಣಿನ ರಕ್ಷಣೆಯಾಗುತ್ತದೆ. ಈ ಅಪೂರ್ವ ಯಂತ್ರದ ವಿನ್ಯಾಸ ಮಾಡಿದ ಶಿಲ್ಪಿ ಆ ಭಗವಂತ.

ನಮ್ಮ ಪ್ರತಿಯೊಂದು ಇಂದ್ರಿಯಗಳನ್ನೂ ಇಂದ್ರಿಯಾಭಿಮಾನಿ ದೇವತೆಗಳು ನಿಯಂತ್ರಿಸುತ್ತಾರೆ ಎನ್ನುವ ವಿಚಾರವನ್ನು ನಾವು ಈ ಹಿಂದೆ ವಿಶ್ಲೇಷಿಸಿದ್ದೇವೆ. ಉದಾಹರಣೆಗೆ ಸೂರ್ಯ ಕಣ್ಣಿನ ಹಾಗೂ ಚಂದ್ರ ಕಿವಿಯ ದೇವತೆ. ಸುಪರ್ಣಿ-ವಾರುಣಿ-ಪಾರ್ವತಿ ಶಬ್ದ-ಸ್ಪರ್ಶ-ಗಂಧದ ಅಭಿಮಾನಿ ದೇವತೆಯರು. ಮನೋಭಿಮಾನಿ ದೇವತೆಯಾಗಿ ಗರುಡ ಶೇಷ ರುದ್ರರಿದ್ದಾರೆ. ಹೀಗೆ ನಮ್ಮ ಕ್ರಿಯೆಯ ಹಿಂದೆ ಅದ್ಭುತವಾದ ಆಧ್ಯಾತ್ಮಿಕ ಶಕ್ತಿ ಕೆಲಸ ಮಾಡುತ್ತಿದೆ.

ಬ್ರಹ್ಮಣ್ಯಾಧಾಯ ಕರ್ಮಾಣಿ ಸಂಗಂ ತ್ಯಕ್ತ್ವಾ ಕರೋತಿ ಯಃ ।
ಲಿಪ್ಯತೇ ನ ಸ ಪಾಪೇನ ಪದ್ಮಪತ್ರಮಿವಾಂಭಸಾ ॥೧೦॥

ಬ್ರಹ್ಮಣಿ ಆಧಾಯ ಕರ್ಮಾಣಿ ಸಂಗಮ್ ತ್ಯಕ್ತ್ವಾ ಕರೋತಿ ಯಃ ।
ಲಿಪ್ಯತೇ ನ ಸಃ ಪಾಪೇನ ಪದ್ಮಪತ್ರಮ್ ಇವ ಅಂಭಸಾ-ಕರ್ಮಗಳನ್ನು ಭಗವಂತನಲ್ಲಿ ಒಪ್ಪಿಸಿ, ನಂಟು ನೀಗಿ ಮಾಡುವವನು ಪಾಪದಿಂದ ಅಂಟಿಸಿಕೊಳ್ಳುವುದಿಲ್ಲ-ತಾವರೆ ಎಲೆ ನೀರಿನಿಂದ ಹೇಗೋ ಹಾಗೆ.

ನಾವು ಪೂಜೆಯ ಕೊನೆಯಲ್ಲಿ "ಶ್ರೀ ಕೃಷ್ಣಾರ್ಪಣ ಮಸ್ತು" ಎಂದು ಹೇಳುತ್ತೇವೆ. ಇದರ ಅರ್ಥ " ಆ ಭಗವಂತನಲ್ಲಿ ಅರ್ಪಿತ". ಅರ್ಪಿಸುವುದು ಎಂದರೆ " ಈ ಕರ್ಮವನ್ನು ಭಗವಂತ ತನ್ನ ಪೂಜಾರೂಪವಾಗಿ ನನ್ನ ಮೂಲಕ ನನ್ನ ಉದ್ಧಾರಕ್ಕಾಗಿ ಅವನೇ ಮಾಡಿಸಿಕೊಂಡ" ಎನ್ನುವ ಸಂಕಲ್ಪ. ಹೀಗೆ ನಾವು ಕರ್ಮವನ್ನು ಮಾಡಿದಾಗ ಯಾವ ಕರ್ಮದ ಲೇಪವೂ ನಮಗೆ ಅಂಟುವುದಿಲ್ಲ. 'ನಾನು, ನನ್ನದು, ನನ್ನಿಂದ' ಎನ್ನುವ ಅಹಂಕಾರ ಹೊರಟುಹೋಗುತ್ತದೆ. ಇದು ಆನಂದಮಯವಾದ ವಿಸ್ಮಯ. ತಾವರೆ ಎಲೆ ನೀರಿನಲ್ಲೇ ಇದ್ದರೂ ಕೂಡಾ ಹೇಗೆ ನೀರನ್ನು ತನಗೆ ಅಂಟಿಸಿಕೊಳ್ಳುವುದಿಲ್ಲವೋ ಹಾಗೇ, ಕರ್ಮದ ಜೊತೆಗೇ ಇದ್ದು, ಕರ್ಮ ಮಾಡಿ, ಕರ್ಮವನ್ನು ಅಂಟಿಸಿಕೊಳ್ಳದೇ ಇರುವುದು ಈ ಅನುಸಂಧಾನದಿಂದ ಮಾತ್ರ ಸಾಧ್ಯ.

ಕಾಯೇನ ಮನಸಾ ಬುದ್ಧ್ಯಾ ಕೇವಲೈರಿಂದ್ರಿಯೈರಪಿ ।
ಯೋಗಿನಃ ಕರ್ಮ ಕುರ್ವಂತಿ ಸಂಗಂ ತ್ಯಕ್ತ್ವಾSSತ್ಮಶುದ್ಧಯೇ ॥೧೧॥

ಕಾಯೇನ ಮನಸಾ ಬುದ್ಧ್ಯಾ ಕೇವಲೈಃ ಇಂದ್ರಿಯೈಃ ಅಪಿ ।
ಯೋಗಿನಃ ಕರ್ಮ ಕುರ್ವಂತಿ ಸಂಗಮ್ ತ್ಯಕ್ತ್ವಾ ಆತ್ಮ ಶುದ್ಧಯೇ-ಯೋಗಿಗಳು ಮೈಯಿಂದ, ಮನದಿಂದ, ಬುದ್ಧಿಯಿಂದ ಮತ್ತು ಬರಿಯ ಇಂದ್ರಿಯಗಳಿಂದ ಕರ್ಮ ಮಾಡುತ್ತಾರೆ. ನಂಟು ನೀಗಿ, ಬಗೆಯ ಶುದ್ಧಿಗಾಗಿ.

ಶಾಸ್ತ್ರದ ಸಂಪ್ರದಾಯದಂತೆ ಒಂದು ವಿಷಯವನ್ನು ಹೇಳಿ; ಕೊನೆಗೆ ಆ ರೀತಿ ಅನುಷ್ಠಾನ ಮಾಡಿದವರ ಬಗ್ಗೆ ಹೇಳಿ; ನಮಗೆ ಆ ವಿಷಯದಲ್ಲಿ ಭರವಸೆ ಬರುವಂತೆ ಮಾಡುತ್ತಾರೆ. ಇದನ್ನು 'ಅರ್ಥವಾದ' ಎನ್ನುತ್ತಾರೆ. ಯಾವುದೇ ವಿಷಯವನ್ನು ನಾವೇ ಮೊದಲು ಆರಂಭಿಸುವುದು ಅಂದರೆ ಸ್ವಲ್ಪ ಕಷ್ಟ. ಆದರೆ 'ಅದು ಹಿಂದಿನಿಂದಲೂ ನಡೆದುಕೊಂಡು ಬಂದ ವಿಚಾರ' ಎಂದಾಗ ಆ ವಿಷಯದ ಬಗ್ಗೆ ನಮಗೆ ಧೈರ್ಯ ಹೆಚ್ಚು. ಹಾಗೇ ಕೃಷ್ಣ ಇಲ್ಲಿ ಜ್ಞಾನಿಗಳು ಸಂನ್ಯಾಸಯುಕ್ತವಾದ ಕರ್ಮಯೋಗ ಮಾಡುವುದನ್ನು ಪ್ರಸ್ತಾಪಿಸುತ್ತಾನೆ.
ಯೋಗಿಗಳು ದ್ವಂದ್ವಾತೀತವಾದ, ಫಲಕಾಮನೆ ಇಲ್ಲದೇ, 'ನನ್ನೊಳಗೆ ಭಗವಂತ ತನ್ನ ಪೂಜೆಯನ್ನು ನನ್ನ ಮೂಲಕ ನನ್ನ ಉದ್ಧಾರಕ್ಕೋಸ್ಕರ ಮಾಡಿಸುತ್ತಿದ್ದಾನೆ' ಎಂದು ತಿಳಿದು ಕರ್ತವ್ಯ ದೃಷ್ಟಿಯಿಂದ ಕರ್ಮ ಮಾಡುತ್ತಾರೆ. ಅವರಿಗೆ ಅಹಂಕಾರ-ಮಮಕಾರ ಇರುವುದಿಲ್ಲ; ಇದರಿಂದ ಮನಸ್ಸು ಶುದ್ಧವಾಗುತ್ತದೆ. ಶುದ್ಧಮನಸ್ಸಿಗೆ ಶುದ್ಧ ವಿಷಯ ಗ್ರಹಣ ಮಾಡಲು ಸಾಧ್ಯ. ಶುದ್ಧ ವಿಷಯ ಗ್ರಹಣ ಎಂದರೆ ಶಾಸ್ತ್ರಕಾರರು ಯಾವ ಅರ್ಥದಲ್ಲಿ ಹೇಳಿದ್ದಾರೋ ಅದೇ ಅರ್ಥದಲ್ಲಿ ಗ್ರಹಿಸುವುದು. ಹೀಗೆ ಅರ್ಥ ಮಾಡಿಕೊಳ್ಳಬೇಕಾದರೆ ನಮ್ಮ ಮನಸ್ಸು ಶಾಸ್ತ್ರಕಾರರ ಮನಸ್ಸಿಗೆ ಶ್ರುತಿಗೂಡಬೇಕು(tuning) ಅಥವಾ ನಾವು ಅವರ ಸ್ಥಾನಕ್ಕೇರಬೇಕು ಹಾಗೂ ಅವರ ಸ್ಥಾನದಲ್ಲಿ ನಿಂತು ಯೋಚಿಸಬೇಕು. ಇಲ್ಲದಿದ್ದರೆ ನಿಜವಾದ ವಿಷಯ ಗ್ರಹಣವಾಗುವುದಿಲ್ಲ. ಇಲ್ಲಿ ಕೃಷ್ಣ ಹೇಳುತ್ತಾನೆ: "ಯೋಗಿಗಳೂ ಕೂಡಾ ಅಹಂಕಾರ-ಮಮಕಾರ ತೊರೆದು (ಸಂಗಂ ತ್ಯಕ್ತ್ವಾ) ಭಗವದರ್ಪಣ ಬುದ್ಧಿಯಿಂದ- ಮೈಯಿಂದ, ಮನದಿಂದ, ಬುದ್ಧಿಯಿಂದ ಮತ್ತು ಇಂದ್ರಿಯಗಳಿಂದ ಕರ್ಮಾನುಷ್ಠಾನವನ್ನು ಮಾಡುತ್ತಾರೆ" ಎಂದು. ಈ ವಿಚಾರವನ್ನು ಮತ್ತಷ್ಟು ಒತ್ತುಕೊಟ್ಟು ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರಿಸುತ್ತಾನೆ.

ಯುಕ್ತಃ ಕರ್ಮಫಲಂ ತ್ಯಕ್ತ್ವಾ ಶಾಂತಿಮಾಪ್ನೋತಿ ನೈಷ್ಠಿಕೀಮ್ ।
ಅಯುಕ್ತಃ ಕಾಮಕಾರೇಣ ಫಲೇ ಸಕ್ತೋ ನಿಬದ್ಧ್ಯತೆ ॥೧೨॥

ಯುಕ್ತಃ ಕರ್ಮಫಲಮ್ ತ್ಯಕ್ತ್ವಾ ಶಾಂತಿಮ್ ಆಪ್ನೋತಿ ನೈಷ್ಠಿಕೀಮ್ ।
ಅಯುಕ್ತಃ ಕಾಮ ಕಾರೇಣ ಫಲೇ ಸಕ್ತಃ ನಿಬದ್ಧ್ಯತೆ-ಯೋಗ ಬಲ್ಲವನು ಕರ್ಮಫಲದ ನಂಟು ತೊರೆದು ನಿಚ್ಚಳವಾದ ನೆಮ್ಮದಿಯನ್ನು ಪಡೆಯುತ್ತಾನೆ. ಯೋಗಿಯಲ್ಲದವನು ಫಲದಲ್ಲಿ ಕಣ್ಣಿರಿಸಿ, ಆಸೆಪಡುತ್ತಾ ಅದರ ಬಂಧಿಯಾಗುತ್ತಾನೆ.

ಕರ್ಮಯೋಗಕ್ಕೆ ತನ್ನನ್ನು ತೊಡಗಿಸಿಕೊಂಡವ, ಭಗವದ್ ಪ್ರಜ್ಞೆಯಲ್ಲಿ ಕರ್ಮ ಮಾಡತಕ್ಕವ-ಜ್ಞಾನಾನಂದದ ತುದಿಯಾದ ಮೋಕ್ಷವನ್ನು ಪಡೆಯುತ್ತಾನೆ. ನಾವು ಯಾವುದೊ ಒಂದು ಫಲ ಕಾಮನೆಯಿಂದ ಕರ್ಮ ಮಾಡಿದರೆ ಅದರಿಂದ ಯಾವುದೇ ಫಲ ಸಿಗುವುದಿಲ್ಲ ಎಂದಲ್ಲ. ಆದರೆ ಆ ಫಲ ನಮಗೆ ಎಷ್ಟು ಉಪಯುಕ್ತ ಎನ್ನುವ ಅರಿವು ನಮಗೆ ಇರುವುದಿಲ್ಲ ಹಾಗೂ ಅದು ಪೂರ್ಣವಾದ ಫಲವಾಗಿರುವುದಿಲ್ಲ. ಫಲಕಾಮನೆ ಇಲ್ಲದೇ ಕರ್ಮ ಮಾಡಿದರೆ ನಾವು ನಮಗೆ ಅಗತ್ಯವಾದ ಎಲ್ಲವನ್ನೂ ಪಡೆಯುತ್ತೇವೆ. ನಾವು ಕರ್ಮಫಲದ ಆಸೆ ಇಲ್ಲದೆ ಕರ್ಮದಲ್ಲಿ ತೊಡಗಿಸಿಕೊಂಡರೆ, ಕರ್ಮದಲ್ಲೇ ಮುಂದುವರಿದು ಅದರಿಂದ ಜ್ಞಾನಪಡೆದು, ಅಂತಃಕರಣ ಶುದ್ಧಿಯಿಂದ ಭಗವಂತನ ಅನುಗ್ರಹಕ್ಕೆ ಪಾತ್ರರಾಗಿ ಮೋಕ್ಷವನ್ನು ಪಡೆಯುಬಹುದು.
ಕರ್ಮಯೋಗವಿಲ್ಲದೆ 'ನನಗೋಸ್ಕರ ನಾನು ದುಡಿಯುತ್ತಿದ್ದೇನೆ, ಇದು ನನ್ನ ಸಂಪತ್ತು, ನಾನು ದುಡಿದದ್ದನ್ನು ನನ್ನ ಸುಖಕ್ಕಾಗಿ ಖರ್ಚು ಮಾಡುತ್ತೇನೆ, ಯಾವ ದೇವರೂ ನಮಗೆ ಸಹಾಯ ಮಾಡುವುದಿಲ್ಲ' ಇತ್ಯಾದಿ ಆತ್ಮ ಕೇಂದ್ರಿತವಾದ ಭಾವನೆಯಿಂದ ಕರ್ಮ ಮಾಡಿದಾಗ ಕರ್ಮ ನಮಗೆ ಬಂಧಿಯಾಗುತ್ತದೆ. ಒಂದು ಮೂಕಪ್ರಾಣಿ ಕೂಡಾ ಹೀಗೆ ಬದುಕುವುದಿಲ್ಲ. ಉದಾಹರಣೆಗೆ ಕಾಗೆ: ಅದಕ್ಕೆ ಒಂದು ತಿನ್ನುವ ವಸ್ತು ಕಾಣಿಸಿದರೆ, ತನ್ನೆಲ್ಲಾ ಬಳಗವನ್ನು ಕರೆದು ಹಂಚಿಕೊಂಡು ತಿನ್ನುತ್ತದೆ. ಹುಲಿ-ಸಿಂಹಗಳಂತಹ ಕ್ರೂರ ಮೃಗಗಳೂ ಕೂಡಾ ಒಮ್ಮೆ ತಮ್ಮ ಹೊಟ್ಟೆ ತುಂಬಿದ ಮೇಲೆ ಎಂದೂ ಸ್ವಾರ್ಥದಿಂದ ಕಾರ್ಯ ನಿರ್ವಹಿಸುವುದಿಲ್ಲ. ಆದರೆ ಮಾನವರಾದ ನಾವು ಸ್ವಾರ್ಥದಿಂದ ಬದುಕುತ್ತೇವೆ. ನಮಗೆ ಎಷ್ಟು ಪಡೆದರೂ ಮತ್ತಷ್ಟರಾಸೆ! ಈ ರೀತಿ ಬದುಕುವವನು ಸಂಸಾರ ಚಕ್ರದಲ್ಲಿ ಸಿಕ್ಕಿ ಅಧೋಗತಿಯನ್ನು ಪಡೆಯುತ್ತಾನೆ.

ಸರ್ವಕರ್ಮಾಣಿ ಮನಸಾ ಸಂನ್ಯಸ್ಯಾಽಸ್ತೇ ಸುಖಂ ವಶೀ ।
ನವದ್ವಾರೇ ಪುರೇ ದೇಹೀ ನೈವ ಕುರ್ವನ್ ನ ಕಾರಯನ್ ॥೧೩॥

ಸರ್ವ ಕರ್ಮಾಣಿ ಮನಸಾ ಸಂನ್ಯಸ್ಯ ಆಸ್ತೇ ಸುಖಮ್ ವಶೀ ।
ನವ ದ್ವಾರೇ ಪುರೇ ದೇಹೀ ನ ಏವ ಕುರ್ವನ್ ನ ಕಾರಯನ್-ಮಾನಸಿಕವಾಗಿ ಎಲ್ಲಾ ಕರ್ಮಗಳ ನಂಟು ತೊರೆದು ಇಂದ್ರಿಯಗಳನ್ನು ಗೆದ್ದವನು ಹಾಯಾಗಿರುತ್ತಾನೆ-ಒಂಭತ್ತು ಬಾಗಿಲ ಈ ಪುರದಲ್ಲಿ; ಏನನ್ನೂ ಮಾಡದೆ, ಏನನ್ನೂ ಮಾಡಿಸದೆ.

ಎಲ್ಲಾ ಕರ್ಮವನ್ನು ಮಾನಸಿಕವಾಗಿ ಸಂನ್ಯಾಸ ಮಾಡು ಎನ್ನುತ್ತಾನೆ ಕೃಷ್ಣ. ಇದು ಬಹಳ ಮುಖ್ಯವಾದ ಮಾತು. ಇಲ್ಲಿ 'ಕರ್ಮವನ್ನು ತ್ಯಾಗ ಮಾಡು' ಎಂದು ಕೃಷ್ಣ ಹೇಳುತ್ತಿಲ್ಲ, ಕೇವಲ ಮನಸ್ಸಿನಲ್ಲಿ ಬಿಡು ಎನ್ನುತ್ತಿದ್ದಾನೆ. ಅಂದರೆ ಕರ್ಮಗಳ ಬಗ್ಗೆ ಮನಸ್ಸಿನಲ್ಲಿರುವ ಫಲದ ಸಂಗ; ಮಾನಸಿಕವಾಗಿ ಸ್ವಾತಂತ್ರ್ಯ ಎನ್ನುವ ಭ್ರಮೆಯನ್ನು ಬಿಡುವುದು. 'ನನಗೆ', 'ನನಗೋಸ್ಕರ' ಎನ್ನುವ ವಿಚಾರವನ್ನು ಮಾನಸಿಕವಾಗಿ ಬಿಡುವುದು. 'ಜೀವನಿಗೆ ಯಾವ ಕಾಲದಲ್ಲೂ ಯಾವ ಕರ್ತೃತ್ವದಲ್ಲೂ ಸ್ವಾತಂತ್ರ್ಯವಿಲ್ಲ'. ಇದನ್ನು ಮಧ್ವಾಚಾರ್ಯರು ತಮ್ಮ ಎಲ್ಲಾ ಗ್ರಂಥಗಳಲ್ಲಿ ಸಾರಿ-ಸಾರಿ ಹೇಳಿದ್ದಾರೆ. ಇದನ್ನು ಮಾನಸಿಕವಾಗಿ ಅಳವಡಿಸಿಕೊಳ್ಳುವುದೇ ನಿಜವಾದ ಕರ್ಮಸಂನ್ಯಾಸ.

ಭಗವಂತ ಈ ಒಂಭತ್ತು ಬಾಗಿಲಿನ ಪುರದೊಳಗೆ(ಪೂರ್ಣತೆಯನ್ನು ಪಡೆದ ಮನುಷ್ಯ ಶರೀರ) ನಮ್ಮನ್ನು ಕೂರಿಸಿ ನಮ್ಮಿಂದ ಕರ್ಮ ಮಾಡಿಸುತ್ತಿದ್ದಾನೆ. 'ನನ್ನನ್ನು ಈ ಪುರದಲ್ಲಿಟ್ಟು, ನನ್ನೊಂದಿಗೆ ನನ್ನ ಆತ್ಮೀಯ ಗೆಳೆಯನಾಗಿ ನಿಂತು, ನನ್ನ ಉದ್ಧಾರಕ್ಕಾಗಿ ಆ ಭಗವಂತ ಕರ್ಮ ಮಾಡಿಸುತ್ತಿದ್ದಾನೆ' ಎನ್ನುವ ಎಚ್ಚರ ಕರ್ಮಯೋಗ.

ಕರ್ಮಯೋಗದ ಬಗ್ಗೆ ಕೃಷ್ಣ ವಿವರಿಸಿದ ಅಪೂರ್ವವಾದ ಜ್ಞಾನಯೋಗವನ್ನು ನೋಡಿದೆವು. ಹೀಗೆ ಕರ್ಮ ಮಾಡುವುದರಿಂದ ಅದು ಭಗವಂತನ ಆರಾಧನೆಯಾಗುತ್ತದೆ ಹಾಗೂ ಜ್ಞಾನಮಾರ್ಗದ ಒಂದು ಅಂಗವಾಗುತ್ತದೆ. ಜ್ಞಾನದಿಂದ ಕರ್ಮ ಮಾಡಿದಾಗ ಯಾವ ಕ್ಷುದ್ರ ಕೆಲಸ ಕೂಡಾ ವ್ಯರ್ಥವಾಗುವುದಿಲ್ಲ, ಅದು ಯೋಗವಾಗುತ್ತದೆ.

ಇಲ್ಲಿ 'ಏನನ್ನೂ ಮಾಡದೆ, ಏನನ್ನೂ ಮಾಡಿಸದೆ' ಎಂದಿದ್ದಾನೆ ಕೃಷ್ಣ. ಸಾಮಾನ್ಯವಾಗಿ ನಾವು ಒಂದು ಕೆಲಸ ಮಾಡಿದರೆ 'ಅದನ್ನು ನಾನು ಮಾಡಿದೆ', 'ನಾನು ಹೇಳಿದ್ದರಿಂದ ಆ ಕಾರ್ಯ ಆಯಿತು' ಎಂದು ಎಲ್ಲಾ ಕಡೆ ಹೇಳಿಕೊಂಡು ಬರುತ್ತೇವೆ. ಹಾಗೆ ನಾಲ್ಕು ಜನ ಹೇಳಲಿ ಎಂದು ಬಯಸುತ್ತೇವೆ. ಆದರೆ ಜ್ಞಾನಿಗಳು ಹಾಗೆ ಹೇಳುವುದಿಲ್ಲ. 'ಏನೋ ದೇವರು ನನ್ನ ಕೈಯಲ್ಲಿ ಮಾಡಿಸಿದ' , 'ನನ್ನೊಳಗಿದ್ದು ಆ ದೇವರು ಮಾಡಿಸಿದ', 'ಭಗವಂತ ಅವರಿಗೆ ಪ್ರೇರಣೆ ಮಾಡಿದ' ಇತ್ಯಾದಿಯಾಗಿ ಮಾತನಾಡುತ್ತಾರೆ. ಇದಕ್ಕೆ ಕಾರಣ ಜ್ಞಾನಿಗಳು ಎಂದೂ 'ನಾನು ಸ್ವತಂತ್ರ ಕರ್ತಾ' ಎನ್ನುವ ಪ್ರಜ್ಞೆಯನ್ನು ಬೆಳೆಸಿಕೊಂಡಿರುವುದಿಲ್ಲ. ಇದು ಜ್ಞಾನಿಗಳ ಮತ್ತು ಅಜ್ಞಾನಿಗಳ ಕರ್ಮದ ಅನುಸಂಧಾನದಲ್ಲಿರುವ ವ್ಯತ್ಯಾಸ.

ಈ ಎಲ್ಲಾ ವಿಚಾರವನ್ನು ತಿಳಿದ ಮೇಲೆ ನಮಗೆ ಒಂದು ಪ್ರಶ್ನೆ ಮೂಡುತ್ತದೆ. ಎಲ್ಲವನ್ನೂ ದೇವರೇ ಮಾಡಿಸುವುದಾದರೆ ಆತ ನಮ್ಮ ಕೈಯಲ್ಲಿ ಒಳ್ಳೆಯ ಕೆಲಸವನ್ನೇ ಮಾಡಿಸಲಿ, ಕೆಟ್ಟ ಕೆಲಸ ಏಕೆ ಮಾಡಿಸುತ್ತಾನೆ? ಕೆಟ್ಟಕೆಲಸ ಮಾಡಿಸುವವ ಅವನೇ ಆದರೆ ನಮಗೇಕೆ ಅದರ ಶಿಕ್ಷೆ? ನಮಗೇಕೆ ದುಃಖ? ನಾನು ಬಯಸಿ ಬುದ್ಧಿಪೂರ್ವಕವಾಗಿ ಮಾಡಿದಾಗ ನಾನು ಏಕೆ ಕರ್ತಾ ಅಲ್ಲ? ಅದರಿಂದ ಏಕೆ ನನಗೆ ಫಲ ಬರುವುದಿಲ್ಲ? ಎಲ್ಲಾ ದೇವರೇ ಮಾಡಿಸುವುದಾದರೆ ನನಗೆ ಫಲ ಹೇಗೆ ಬರುತ್ತದೆ? ಇತ್ಯಾದಿ ಪ್ರಶ್ನೆ. ಇದು ಪ್ರತಿಯೊಬ್ಬರನ್ನೂ ಕಾಡುವ ಪ್ರಶ್ನೆ. ಇವು ಕಾಡುವ ಪ್ರಶ್ನೆಗಳೇನೋ ಸರಿ ಆದರೆ ಸರಿಯಾದ ಪ್ರಶ್ನೆಗಳಲ್ಲ. ಶಾಸ್ತ್ರದ ತಿರುಳು ತಿಳಿಯದಾಗ ಈ ಪ್ರಶ್ನೆಗಳು ಬರುತ್ತವೆ. ಮುಂದಿನ ಶ್ಲೋಕಗಳನ್ನು ಸೂಕ್ಷ್ಮವಾಗಿ ವಿಶ್ಲೇಷಿಸಿದರೆ ಈ ನಮ್ಮ ಪ್ರಶ್ನೆಗೆ ಉತ್ತರ ಸಿಗುತ್ತದೆ.

ನ ಕರ್ತೃತ್ವಂ ನ ಕರ್ಮಾಣಿ ಲೋಕಸ್ಯ ಸೃಜತಿ ಪ್ರಭುಃ ।
ನ ಕರ್ಮಫಲಸಂಯೋಗಂ ಸ್ವಭಾವಸ್ತು ಪ್ರವರ್ತತೇ ॥೧೪॥

ನ ಕರ್ತೃತ್ವಮ್ ನ ಕರ್ಮಾಣಿ ಲೋಕಸ್ಯ ಸೃಜತಿ ಪ್ರಭುಃ ।
ನ ಕರ್ಮಫಲ ಸಂಯೋಗಮ್ ಸ್ವಭಾವಃ ತು ಪ್ರವರ್ತತೇ -- ಜೀವ ಜಡದಂತಲ್ಲ; ಕ್ರಿಯೆ ಮಾಡಬಲ್ಲ. ಆದರೂ ಅವನು ಹೊಣೆಗಾರನಲ್ಲ- ಲೋಕದ ಯಾವ ಕ್ರಿಯೆಗೂ, ಪುಣ್ಯ-ಪಾಪಗಳಿಗೂ,ಅದರಿಂದೊದಗುವ ಫಲಕ್ಕೂ. [ಕ್ರಿಯೆಯ,ಪುಣ್ಯಪಾಪಗಳ, ಮತ್ತು ಕರ್ಮಫಲ ಪಡೆಯುವ ಒಡೆತನವನ್ನು ಜೀವಲೋಕಕ್ಕೆ ಭಗವಂತ ನೀಡಲಿಲ್ಲ]. ಜೀವದ ಸ್ವಭಾವ ತನ್ನ ಕೆಲಸ ಮಾಡುತ್ತಿರುತ್ತದೆ.[ಭಗವಂತ ಈ ಎಲ್ಲವನ್ನೂ ಮಾಡುತ್ತಿರುತ್ತಾನೆ].

ಈ ಹಿಂದೆ ವಿಶ್ಲೇಷಿಸಿದ ಸಮಸ್ತ ಪ್ರಶ್ನೆಗಳಿಗೂ ಉತ್ತರ ಒಗಟಿನ ರೂಪದಲ್ಲಿ ಈ ಶ್ಲೋಕದಲ್ಲಡಗಿದೆ. ಮೇಲ್ನೋಟಕ್ಕೆ ಇದು ತಿಳಿಯುವುದಿಲ್ಲ; ಶಾಸ್ತ್ರದ ಅನುಭಾವದಿಂದ ಒಂದೊಂದು ಶಬ್ದವನ್ನು ಮನನ ಮಾಡಿದಾಗ ಮಾತ್ರ ಅಲ್ಲಿ ಉತ್ತರ ಸಿಗುತ್ತದೆ.
ಜಡಲೋಕಕ್ಕೆ ಜೀವ-ಪ್ರಭು, ಅದರಲ್ಲಿ ಇಚ್ಛಾಪೂರ್ವಕಕ್ರಿಯೆ ಇದೆ, ಆದರೆ ಅದು ಕರ್ತೃತ್ವವಲ್ಲ. ಜೀವವನ್ನು ಜಡಕ್ಕೆ ಹೋಲಿಸಿದಾಗ: ಜಡಕ್ಕೆ ಯೋಚನೆ ಮಾಡುವ ಶಕ್ತಿ ಇಲ್ಲ-ಆದರೆ ಜೀವಕ್ಕೆ ಯೋಚನೆ ಮಾಡುವ ಶಕ್ತಿ ಇದೆ; ಜಡಕ್ಕೆ ಬುದ್ಧಿ ಇಲ್ಲ-ಆದರೆ ಜೀವಕ್ಕಿದೆ; ಎರಡಕ್ಕೂ ಕರ್ತೃತ್ವವಿಲ್ಲ. ಕ್ರಿಯೆಯ,ಪುಣ್ಯಪಾಪಗಳ, ಮತ್ತು ಕರ್ಮಫಲ ಪಡೆಯುವ ಒಡೆತನವನ್ನು ಜೀವಲೋಕಕ್ಕೆ ಭಗವಂತ ನೀಡಿಲ್ಲ. ಜೀವನಿಗೆ ದತ್ತಸ್ವಾತಂತ್ರ್ಯ ಕೂಡಾ ಇಲ್ಲ. [ಉದಾಹರಣೆಗೆ: ಒಬ್ಬ ರಾಜ ತನ್ನ ಮಗನಿಗೆ ದೇಶದ ಒಂದು ಭಾಗವನ್ನು ಸ್ವತಂತ್ರವಾಗಿ ಆಳುವ ಅಧಿಕಾರ ಕೊಡುವುದು ದತ್ತಸ್ವಾತಂತ್ರ್ಯ]. ಕರ್ತೃತ್ವವನ್ನು ಸರಿಯಾಗಿ ತಿಳಿದುಕೊಳ್ಳಬೇಕಾದರೆ ಅದರ ಹಿಂದಿರುವ ಸ್ವಾರಸ್ಯವಾದ ಶಾಸ್ತ್ರೀಯ ಪ್ರಕ್ರಿಯೆಯನ್ನು ತಿಳಿದುಕೊಳ್ಳಬೇಕು.
ಪ್ರಪಂಚದಲ್ಲಿ ಮೂರು ತರಹದ ಕರ್ತೃತ್ವವಿದೆ. ಕೇವಲ ಕ್ರಿಯೆ ಇರುವುದೂ ಒಂದು ವಿಧದ ಕರ್ತೃತ್ವ. ಇದು ಜಡಕ್ಕೂ ಇದೆ. ಉದಾಹರಣೆಗೆ 'ಕೆಚ್ಚಲು ಹಾಲು ಕೊಡುತ್ತದೆ'; ಇಲ್ಲಿ ಕೆಚ್ಚಲಿನಿಂದ ಹಾಲು ಸುರಿಯುವ ಕೃತಿ ಇದೆ ಆದರೆ ಅದು ಅತ್ಯಂತ ಅಮುಖ್ಯವಾದ ಕರ್ತೃತ್ವ. ಎರಡನೇಯದು ಬುದ್ಧಿ ಪೂರ್ವಕವಾದ ಕೃತಿ. ಸ್ವತಂತ್ರವಲ್ಲದ ಇಚ್ಛಾಪೂರ್ವಕ ಕೃತಿ-ಇದು ಜೀವರಿಗಿದೆ, ಆದರೆ ನಿಜವಾದ ಪ್ರಮುಖ ಕರ್ತೃತ್ವ ಇದಲ್ಲ. ಸ್ವತಂತ್ರವಾದ ಇಚ್ಛಾಪೂರ್ವಕ ಕ್ರಿಯೆ ನಿಜವಾದ ಕರ್ತೃತ್ವ. ಇದು ಇರುವುದು ಕೇವಲ ಭಗವಂತನಲ್ಲಿ ಮಾತ್ರ. ಜೀವನಿಗೆ ಕರ್ಮದಲ್ಲಿ ದತ್ತಸ್ವಾತಂತ್ರ್ಯ ಕೂಡಾ ಇಲ್ಲ. ಜೀವ ಭಗವಂತನ ಪರಾಧೀನ. ಆದ್ದರಿಂದ ಆತ ಕರ್ತಾ ಅಲ್ಲ.
ಉದಾಹರಣೆಗೆ ತೊಟ್ಟಿಲಲ್ಲಿರುವ ಮಗು. ಅದಕ್ಕೆ ಬುದ್ಧಿ ಇದೆ, ತಿನ್ನಬೇಕು ಎನ್ನುವ ಇಚ್ಛೆ ಇದೆ, ಆದರೆ ಸ್ವಾತಂತ್ರ್ಯವಿಲ್ಲ. ತಾಯಿ ಬಾಯಿಗಿಟ್ಟಿದ್ದನ್ನು ಅದು ತಿನ್ನುತ್ತದೆ. ಇದು ಇಚ್ಛಾಪೂರ್ಣ ಕ್ರಿಯೆ ಆದರೆ ಸ್ವತಂತ್ರ-ಇಚ್ಛಾಪೂರ್ಣ ಕ್ರಿಯೆ ಅಲ್ಲ. ಇನ್ನು ಫಲದ ಬಗ್ಗೆ ಇದೇ ದೃಷ್ಟಾಂತದೊಂದಿಗೆ ನೋಡಿದಾಗ: ತಂದೆ-ತಾಯಿ ಮಗುವಿಗೆ 'ದೇವರಿಗೆ ನಮಸ್ಕಾರ ಮಾಡು' ಎಂದು ಹೇಳುತ್ತಾರೆ, ಆಗ ಆ ಮಗು ಮಾಡುವುದಿಲ್ಲ, ಇಂತಹ ಸಂದರ್ಭದಲ್ಲಿ ತಂದೆ ತಾಯಿ, ಮಗುವನ್ನು ತಿದ್ದಿ-ತೀಡಿ ಅಥವಾ ಅಗತ್ಯಬಿದ್ದರೆ ಶಿಕ್ಷಿಸಿ ದೇವರಿಗೆ ನಮಸ್ಕರಿಸುವಂತೆ ಮಾಡುತ್ತಾರೆ, ಆಗ ಆ ಮಗು ಮಾಡುತ್ತದೆ. ಇಲ್ಲಿ ನಮಸ್ಕಾರ ಮಾಡಿಸಿದ್ದು ತಂದೆ-

ತಾಯಿಯಾದರೂ ಸಹ ಫಲ ಮಗುವಿಗೆ. ಇದೇ ರೀತಿ ಜೀವನೊಳಗೆ ಕುಳಿತ ಕಣ್ಣಿಗೆ ಕಾಣದ ಭಗವಂತ 'ಜೀವನ' ಕ್ರಿಯೆಯನ್ನು ನಿಯಂತ್ರಿಸುತ್ತಾನೆ. ನಮ್ಮ ಮೂಲಕ ಕರ್ಮ ಮಾಡಿಸುವವನು ಭಗವಂತನಾದರೂ ಕೂಡಾ ಕರ್ಮದ ಫಲ ನಮಗೇ ಹೊರತು ಭಗವಂತನಿಗಲ್ಲ.

ಈ ದೃಷ್ಟಾಂತದೊಂದಿಗೆ ಮುಂದುವರಿದಾಗ ನಮಗೆ ಇನ್ನೊಂದು ಪ್ರಶ್ನೆ ಕಾಡುತ್ತದೆ. "ಭಗವಂತ ನಮ್ಮ ಮುಖೇನ ಏಕೆ ಕೆಟ್ಟ ಕೆಲಸ ಮಾಡಿಸುತ್ತಾನೆ? ತಂದೆ-ತಾಯಿ ಎಂದೂ ಮಗುವಿನಲ್ಲಿ ಕೆಟ್ಟ ಕೆಲಸ ಮಾಡಿಸುವುದಿಲ್ಲ, ಅದೇ ರೀತಿ ಏಕೆ ಭಗವಂತ ನಮ್ಮಲ್ಲಿ ಕೇವಲ ಒಳ್ಳೆಯ ಕೆಲಸ ಮಾಡಿಸಬಾರದು?" ಎಂದು. ಇದು ಲೋಕದಲ್ಲಿರುವುದಕ್ಕಿಂತ ವಿಲಕ್ಷಣವಾಗಿ ಕಾಣುವ ಕ್ರಿಯೆ. ಉದಾಹರಣೆಗೆ ಒಬ್ಬ ಉಪಾಧ್ಯಾಯ, ಆತ ತನ್ನ ಪಾಠ ಪ್ರವಚನವನ್ನು ಎಲ್ಲಾ ಮಕ್ಕಳಿಗೂ ಒಂದೇ ರೀತಿಯಾಗಿ, ಭೇದ ಭಾವವಿಲ್ಲದೆ ಕಲಿಸುತ್ತಾನೆ. ಆದರೆ ಒಬ್ಬ ಪಾಠವನ್ನು ಬಹುಬೇಗ ಅರ್ಥ ಮಾಡಿಕೊಂಡರೆ ಇನ್ನೊಬ್ಬ ಅರ್ಥವಾಗದೇ ತಳಮಳಿಸಬಹುದು; ಮತ್ತೊಬ್ಬ ಅಪಾರ್ಥ ಮಾಡಿಕೊಳ್ಳಬಹುದು. ಇದಕ್ಕೆ ಉಪಾಧ್ಯಾಯರು ಕಾರಣರಲ್ಲ, ಇದು ವಿಧ್ಯಾರ್ಥಿಯ ಸ್ವಭಾವಕ್ಕೆ ಸಂಬಂಧಪಟ್ಟ ವಿಚಾರ. ಕೃಷ್ಣ ಹೇಳುತ್ತಾನೆ "ಸ್ವಭಾವಸ್ತು ಪ್ರವರ್ತತೇ" ಎಂದು. ಇದು ಅಪೂರ್ವವಾದ ಸಂಗತಿ. ಹಿಂದೆ ಹೇಳಿದಂತೆ ಜೀವ ಅನಾಧಿನಿತ್ಯ, ಅದನ್ನು ಭಗವಂತ ಸೃಷ್ಟಿ ಮಾಡಿಲ್ಲ. ಈ ಅನಾಧಿನಿತ್ಯವಾದ ಜೀವಕ್ಕೆ ಅನಾಧಿನಿತ್ಯವಾದ ಒಂದು ಅಸಾಧಾರಣ ಸ್ವಭಾವವಿದೆ(Exclusive Quality). ಆ ಸ್ವಭಾವದಂತೆ ಆ ಜೀವ ನಡೆದುಕೊಳ್ಳುತ್ತದೆ.

ಜೀವಸ್ವಭಾವದಂತೆ ಜೀವ ನಡೆದುಕೊಳ್ಳುವುದು ಅಂದರೆ: ಉದಾಹರಣೆಗೆ ಮಾವಿನ ಬೀಜ, ಅದು ಮರವಾಗಿ ಮಾವಿನ ಹಣ್ಣನ್ನೇ ಕೊಡುತ್ತದೆ ಹೊರತು ಹಲಸಿನ ಹಣ್ಣನ್ನಲ್ಲ, ಇದು ಆ ಬೀಜದ ಸ್ವಭಾವ. ಜೀವ ಎನ್ನುವುದು ಶರೀರ ಎನ್ನುವ ವೃಕ್ಷದ ಬೀಜ. ಆ ಶರೀರದ ಮೂಲಕ ವ್ಯಕ್ತವಾಗುವುದು ಆ ಬೀಜದ ಮೂಲ ಗುಣವೇ ಹೊರತು ಇನ್ನೇನೂ ಅಲ್ಲ. ಜೀವ ಮೊದಲನೆಯದಾಗಿ ತನ್ನ ಸ್ವಭಾವಕ್ಕೆ ಅಧೀನ. ನಾವು ನಮಗೆ ತೋಚಿದಂತೆ ಮಾಡಲು ಸಾಧ್ಯವಿಲ್ಲ, ನಮ್ಮ ಸ್ವಭಾವ ಎಂತೋ ಅಂತೆಯೇ ನಮ್ಮ ತೀರ್ಮಾನ. ಮೂಲತಃ ನಿಜವಾದ ಸ್ವಭಾವದಂತೆ ನಮ್ಮ ಅನಿಸಿಕೆ; ಅದಕ್ಕೆ ವಿರುದ್ಧವಾಗಿ ನಾವು ಕೆಲಸ ಮಾಡುವುದಿಲ್ಲ. ಈ ಕಾರಣದಿಂದ ಸ್ವಭಾವತಃ ಸಾತ್ವಿಕನಾದರೆ ಆತನ ವಿಚಾರಧಾರೆಗಳೆಲ್ಲವೂ ಸಾತ್ವಿಕಗುಣದ ಪ್ರಭಾವದಲ್ಲೇ ಇರುತ್ತದೆ. ರಾಜಸನಾದವನ ವಿಚಾರಧಾರೆ ರಾಜಸ ಗುಣದ ಪ್ರಭಾವದಲ್ಲಿರುತ್ತದೆ. ಸ್ವಭಾವದ ಜೊತೆಗೆ ಹುಟ್ಟಿ ಬೆಳೆದ ಸಮಾಜದ ಪ್ರಭಾವವಿದ್ದರೂ ಸಹ ಅದರ ಅಭಿವ್ಯಕ್ತತೆ ಕ್ಷಣಿಕ. ಅದು ಹೆಚ್ಚೆಂದರೆ ಒಂದು ಜನ್ಮಕ್ಕೆ ಸೀಮಿತ, ಆದರೆ ಕೊನೆಗೆ ಉಳಿಯುವುದು ಜೀವಸ್ವಭಾವ ಮಾತ್ರ.

ಜೀವಕ್ಕೆ ಅನಾಧಿನಿತ್ಯವಾಗಿ ಅಂಟಿದ ಸ್ವಭಾವ- ಸಾತ್ವಿಕ ರಾಜಸ ಮತ್ತು ತಾಮಸಗಳ ಸಮ್ಮಿಶ್ರಣ. ಸಾತ್ವಿಕರು ಎಂದರೆ ಅವರಲ್ಲಿ ಸಾತ್ವಿಕ ಗುಣ ಪ್ರಮಾಣ ಹೆಚ್ಚು. ಯಾರಲ್ಲಿ ಯಾವ ಗುಣ ಪ್ರಧಾನವೋ ಆತ ಆ ಗುಂಪಿಗೆ ಸೇರುತ್ತಾನೆ. ಈ ಮೂರು ವಿಧವಾದ ಜೀವಜಾತ ತನ್ನ ಸ್ವಭಾವಕ್ಕೆ ಅಧೀನವಾಗಿ ನಡೆದುಕೊಳ್ಳುತ್ತದೇ ಹೊರತು, ತಾನು ಹೇಗೆ ಮಾಡಬೇಕು ಎಂದು ತೀರ್ಮಾನ ಮಾಡಿ ತನ್ನನ್ನು ರೂಪಿಸಿಕೊಳ್ಳುವ ಸ್ವತಂತ್ರ ಕರ್ತೃತ್ವ ಅದಕ್ಕಿರುವುದಿಲ್ಲ.

ಸ್ವಭಾವ ನಮ್ಮ ಅಧೀನ ಅಲ್ಲ, ಅಂದಮೇಲೆ ಆ ಸ್ವಭಾವದ ಅಭಿವ್ಯಕ್ತಿ ನನ್ನ ಸ್ವಾತಂತ್ರ್ಯದಲ್ಲಿಲ್ಲ. ಮತ್ತೆ ಆ ಸ್ವಭಾವದ ಅಭಿವ್ಯಕ್ತಿ ಹೇಗೆ? ಸ್ವಭಾವಕ್ಕೆ ತಕ್ಕಂತೆ ಬೆಳೆಯುವುದು ಯಾರ ಅಧೀನವಾಗಿ? ಸ್ವಭಾವಕ್ಕೆ ಆ ಶಕ್ತಿ

ಎಲ್ಲಿಂದ ಬಂತು? ಈ ಎಲ್ಲಾ ಪ್ರಶ್ನೆಗೆ ಇದೇ ಶ್ಲೋಕದಲ್ಲಿ ಉತ್ತರವಿದೆ. ಅದಕ್ಕಾಗಿ ನಾವು ಈ ಶ್ಲೋಕದಲ್ಲಿ ಅಡಗಿರುವ ಇನ್ನೊಂದು ಅರ್ಥವನ್ನು ನೋಡಬೇಕು. ನಮಗೆ ಕರ್ತೃತ್ವವಿಲ್ಲ ಹಾಗೂ ಕರ್ಮದಲ್ಲಿ ಇಂತದ್ದೇ ಫಲ ಬರಬೇಕು ಎನ್ನುವ ಸ್ವಾತಂತ್ರ್ಯವಿಲ್ಲ. ತಾನೇ ತಾನಾಗಿ ತನ್ನನ್ನು ಬಿತ್ತಿಕೊಂಡು ತಾನೇ ಮರವಾಗಿ ಬೆಳೆದು ಹಣ್ಣನ್ನು ಕೊಡುವ ಶಕ್ತಿ ಜೀವಕ್ಕಿಲ್ಲ. ಸ್ವತಂತ್ರನಾದ ಭಗವಂತ ಸೃಷ್ಟಿ ಎನ್ನುವ ತೋಟ ನಿರ್ಮಿಸಿ, ಅಲ್ಲಿ ಒಬ್ಬ ತೋಟಗಾರನಂತೆ, ಜೀವ ಎನ್ನುವ ಬೀಜವನ್ನು ಬಿತ್ತಿ ಬೆಳೆಸುತ್ತಾನೆ. ಅದರಿಂದ ನಮ್ಮ ದೇಹ ಎನ್ನುವ ಮರ ಬೆಳೆಯುತ್ತದೆ ಮತ್ತು ಅದರಿಂದ ಕಹಿಯಾದ, ಹುಳಿಯಾದ ಅಥವಾ ಸಿಹಿಯಾದ ಹಣ್ಣು ಜೀವ ಸ್ವಭಾವದಂತೆ ಅಭಿವ್ಯಕ್ತವಾಗುತ್ತದೆ. ಆದ್ದರಿಂದ ಕೆಟ್ಟಕೆಲಸ(ಕಹಿ) ಒಳ್ಳೆಯಕೆಲಸ(ಸಿಹಿ) ಎನ್ನುವುದು ನಮ್ಮ ಸ್ವಭಾವವನ್ನವಲಂಬಿಸಿದೆಯೇ ಹೊರತು ಭಗವಂತನನ್ನಲ್ಲ. ತೋಟಗಾರ ಎಂದೂ ಮೆಣಸಿನ ಗಿಡಕ್ಕೆ ಖಾರವಾದ ನೀರನ್ನು ಹರಿಸುವುದಿಲ್ಲ. ಎಲ್ಲಾ ಗಿಡದಂತೆ ಆ ಗಿಡವನ್ನೂ ಪೋಷಿಸಿ ಬೆಳೆಸುತ್ತಾನೆ. ಆದರೆ ಅದು ಖಾರವಾದ ಹಣ್ಣನ್ನು ತನ್ನ ಸ್ವಭಾವದಂತೆ ಕೊಡುತ್ತದೆ. ಹಾಗೇ ಭಗವಂತ ಅನಾಧಿನಿತ್ಯವಾದ ಜೀವದ ಸ್ವಭಾವಕ್ಕೆ ತಕ್ಕಂತೆ ಕ್ರಿಯೆ ಮಾಡಿಸಿದ ಹಾಗೇ ಕ್ರಿಯೆ ನಡೆಯಿತು.

ಕೆಲವೊಮ್ಮೆ ನಾವು ಯೋಚಿಸಿದ್ದಕ್ಕೆ ವಿರುದ್ಧವಾಗಿ ಕೆಲಸ ಮಾಡುತ್ತೇವೆ. ಏಕೆಂದರೆ ನಮ್ಮ ಮನಸ್ಸು ಮತ್ತು ಬುದ್ಧಿಯ ವಿಚಾರ ಸರಣಿ(Intellectual approach) ಬೇರೆ, ನಾವು ಮಾಡುವುದು ಬೇರೆ. ಈ ಕಾರಣಕ್ಕಾಗಿ ಕೆಲವರು ಹೊರಗಿನಿಂದ ಒಂದು ಮಾತನಾಡಿ ಒಳಗಿನಿಂದ ಅದಕ್ಕೆ ವ್ಯತಿರಿಕ್ತವಾದದ್ದನ್ನು ಮಾಡುತ್ತಾರೆ. ದುರ್ಯೋಧನ ಕೂಡಾ "ನಾನು ಮಾಡುತ್ತಾ ಇರುವುದು ತಪ್ಪು ಎನ್ನುವುದು ನನಗೆ ತಿಳಿದಿದೆ" ಎಂದು ಹೇಳಿರುವುದನ್ನು ಇಲ್ಲಿ ನಾವು ಗಮನಿಸಬೇಕು. ಆತನಿಗೆ ಧರ್ಮ ಯಾವುದು ಎಂದು ತಿಳಿದಿತ್ತು. ಆದರೂ ಆತ ತನ್ನ ಸ್ವಭಾವದಂತೆ ನಡೆದ. ಆದ್ದರಿಂದ ನಮ್ಮ ತಿಳುವಳಿಕೆ ಬೇರೆ, ನಮ್ಮ ಕ್ರಿಯೆ ಬೇರೆ. ನಮ್ಮ ಸ್ವಭಾವ ನಮ್ಮೆಲ್ಲಾ ಅಧ್ಯಯನ, ಬುದ್ಧಿ, ವಿಚಾರವಾದವನ್ನು ಬದಿಗೊತ್ತಿ ನಮ್ಮಿಂದ ಸ್ವಭಾವಕ್ಕನುಗುಣವಾದ ಕೆಲಸವನ್ನು ಮಾಡಿಸಿ ಬಿಡುತ್ತದೆ. ಇದನ್ನೇ ಕೃಷ್ಣ ಇಲ್ಲಿ " ಸ್ವಭಾವಸ್ತು ಪ್ರವರ್ತತೇ" ಎಂದಿರುವುದು. ನಿನ್ನ ಸ್ವಭಾವ ಎಂತಹದ್ದೋ-ಅಂತಹದ್ದೇ ನಿನ್ನ ಪ್ರವೃತ್ತಿ. ಅದಕ್ಕನುಗುಣವಾಗಿ ಭಗವಂತ ನಿನ್ನನ್ನು ಬೆಳೆಸುತ್ತಾನೆ. ಯಾರಲ್ಲಿ ಯಾವ ಸ್ವಭಾವವಿದೆಯೋ ಅದೇ ರೀತಿ ಅವರಿರಬೇಕೇ ಹೊರತು ಇನ್ನೊಬ್ಬರಂತಲ್ಲ. ಮಾವಿನ ಹಣ್ಣು ಹುಳಿಯಾದರೆ ಅದು ಕೆಟ್ಟ ಹಣ್ಣು, ಅದೇ ಹುಣಸೆ ಹಣ್ಣು ಹೆಚ್ಚು ಹುಳಿಯಾದಂತೆ ಹೆಚ್ಚು ಉತ್ತಮ. ಆದ್ದರಿಂದ ತಾಮಸರು ತಾಮಸರಂತಿರುವುದು ಅವರ ಸಹಜ ಧರ್ಮ. ಯಾರ್ಯಾರ ಸಹಜ ಸ್ವಭಾವ ಎಂತದ್ದೋ ಅಂತೆಯೇ ಸಹಜ ಸ್ವಭಾವದಲ್ಲಿ ಬೆಳೆಸುವ ಕ್ರಿಯೆಯನ್ನು ಸ್ವತಂತ್ರನಾದ ಭಗವಂತ ಮಾಡಿದ. ಎಲ್ಲವುದರ ಫಲವನ್ನು ಕೊಡುವವನೂ ಅವನೇ. ಅವನಿಗೆ ಎಂದೂ ಬಂಧನವಿಲ್ಲ.

ಹೀಗೆ ಈ ಶ್ಲೋಕ ನಮ್ಮೆಲ್ಲಾ ಸಂಶಯಗಳಿಗೆ ಉತ್ತರರೂಪದಲ್ಲಿದೆ. ನಮ್ಮ ಸಂಶಯ ಅತ್ಯಂತ ಗಾಢ. ಮನಸ್ಸಿಗೆ ಬರುವ ಸಂಶಯವನ್ನು ನಿವಾರಿಸಬಹುದು ಆದರೆ ಬುದ್ಧಿಗೆ ಬರುವ ಸಂಶಯ (Intellectual doubt)ವನ್ನು ನಿವಾರಿಸುವುದು ಕಷ್ಟ. ಪ್ರಾಚೀನ ಶಾಸ್ತ್ರಕಾರರು ಮನಃಶಾಸ್ತ್ರದ ಪ್ರಕಾರ ಇದನ್ನು 'ಸ್ಥಿರಸಂಶಯ' ಎಂದು ಕರೆದರು. ನಮ್ಮಲ್ಲಿರುವ ಭೌತಿಕ ಕೊಳೆ ಜಗತ್ತಿನಲ್ಲಿ 'ಎಲ್ಲರಿಗಿಂತ ನಾನು ಬುದ್ಧಿವಂತ' ಎಂದು ತಿಳಿದುಕೊಳ್ಳುವಂತೆ ಮಾಡುತ್ತದೆ. ಇದರಿಂದ ನಾವು ಸತ್ಯದ ಕಡೆಗೆ ಮನಸ್ಸನ್ನು ಒಗ್ಗಿಸಿಕೊಳ್ಳುವುದಿಲ್ಲ ಹಾಗೂ ಅದರಿಂದ ನಮಗೆ ನಂಬಿಕೆ ಬರುವುದಿಲ್ಲ. ನಾವು ಯಾವುದೇ ಕೆಲಸ ಮಾಡಿದರೂ ಅದನ್ನು ತಿಳಿದು-ನಂಬಿ

ಮಾಡಬೇಕು. ಅದಕ್ಕೋಸ್ಕರ ಪ್ರತೀ ಹೆಜ್ಜೆಯಲ್ಲೂ ಶಾಸ್ತ್ರೀಯ ಅನುಭಾವ ಮುಖ್ಯ. ನಾನು ಅಂದರೇನು, ಸ್ವಭಾವ ಅಂದರೇನು, ನನ್ನ ಸ್ವಭಾವವನ್ನು ನಿಯಂತ್ರಿಸುವ ಆ ಶಕ್ತಿ ಯಾವುದು, ಕೈಹಿಡಿದು ನಡೆಸುವವ ಮತ್ತು ಫಲ ಕೊಡುವವ ಯಾರು, ಇತ್ಯಾದಿ ವಿಚಾರ ತಿಳಿದಾಗ ಅಲ್ಲಿ ಅಹಂಕಾರಕ್ಕೆ ಎಡೆಯಿಲ್ಲ.

ಇಲ್ಲಿ ನಮಗೆ ಒಂದು ಪ್ರಶ್ನೆ ಬರಬಹುದು. ಭಗವಂತ ನಮಗೆ ಶಿಕ್ಷೆ ಏಕೆ ಕೊಡುತ್ತಾನೆ ಎಂದು. ದೇವರು ನಮಗೆ ಶಿಕ್ಷೆ ಕೊಡುವುದು ದ್ವೇಷದಿಂದಲ್ಲ, ಅದರ ಹಿಂದಿರುವುದು ಅಪಾರ-ಅನಂತವಾದ ಕಾರುಣ್ಯ. ತಾಯಿ ಮಗುವಿಗೆ ಶಿಕ್ಷೆ ಕೊಡುವ ಹಿಂದಿರುವ ಕಾರುಣ್ಯ ಹೇಗೋ ಹಾಗೆ. ಜೀವನದಲ್ಲಿ ಬರುವ ದುಃಖ ದುರಿತಗಳಿಂದ ಜೀವ ಪಾಕವಾಗುತ್ತದೆ. ಜೀವನದಲ್ಲಿ ನಮಗೆ ಬರುವ ತಾಪತ್ರಯಗಳ ತಾಪಕ್ಕೆ ನಾವು ಬೇಯಬೇಕು, ಬೆಂದು ಪಕ್ವವಾಗಬೇಕು. ಜೀವನದಲ್ಲಿ ಕಷ್ಟವನ್ನು ನೋಡದವನು ಎಂದೂ ಬೆಳೆಯುವುದಿಲ್ಲ. ಅವರಿಗೆ ಇನ್ನೊಬ್ಬರ ಸುಖ-ದುಃಖ ಅರ್ಥವಾಗುವುದಿಲ್ಲ. ಜೀವ ಪಕ್ವವಾಗುವುದೇ ಕಷ್ಟಗಳು ಬಂದಾಗ. ಇದು ಭಗವಂತ ನಮಗೆ ಕೊಡುವ ಶಿಕ್ಷೆಯ ಹಿಂದಿರುವ ಕಾರುಣ್ಯ. ನಮ್ಮ ಪತನದ ಹಿಂದೆ ಒಂದು ಉದ್ಧಾರದ ಬೀಜವಿರುತ್ತದೆ. ದುಃಖದ ಹಿಂದೆ ಸುಖದ ಬೀಜವಿರುತ್ತದೆ. ಹೀಗೆ ಶಾಸ್ತ್ರೀಯವಾಗಿ ನೋಡಿದಾಗ ಇಡೀ ಪ್ರಪಂಚದ ಹಿಂದೆ ಇರುವ ವಿಶ್ವಶಕ್ತಿ, ಮಹಾ ಕಾರುಣ್ಯಮೂರ್ತಿಯಾಗಿ ನಮ್ಮನ್ನು ರಕ್ಷಿಸುತ್ತಿದೆ ಎನ್ನುವ ಎಚ್ಚರ ಬರುತ್ತದೆ. ಏಳಲು ಬಲವಿಲ್ಲದ ಮಗುವನ್ನು ತಾಯಿ ಹೇಗೆ ನೋಡಿಕೊಳ್ಳುತ್ತಾಳೇ, ಹಾಗೇ ಭಗವಂತ ನಮ್ಮನ್ನು ಪ್ರತೀಕ್ಷಣವೂ ರಕ್ಷಿಸುತ್ತಿದ್ದಾನೆ. ಇದು ಅಧ್ಯಾತ್ಮ ಮಾರ್ಗದಲ್ಲಿ ನಿರಂತರ ಇರಬೇಕಾದ ಅಂತಃಪ್ರಜ್ಞೆ.

ನಾऽದತ್ತೇ ಕಸ್ಯಚಿತ್ ಪಾಪಂ ನ ಚೈವ ಸುಕೃತಂ ವಿಭುಃ ।
ಅಜ್ಞಾನೇನಾऽವೃತಂ ಜ್ಞಾನಂ ತೇನ ಮುಹ್ಯಂತಿ ಜಂತವಃ ॥೧೫॥

ನ ಆದತ್ತೇ ಕಸ್ಯಚಿತ್ ಪಾಪಮ್ ನ ಚ ಏವ ಸುಕೃತಮ್ ವಿಭುಃ ।
ಅಜ್ಞಾನೇನ ಆವೃತಮ್ ಜ್ಞಾನಮ್ ತೇನ ಮುಹ್ಯಂತಿ ಜಂತವಃ -ಜಡಕ್ಕಿಂತ ಮಿಗಿಲೆನಿಸಿದ ಜೀವ ಯಾರ ಪಾಪವನ್ನೂ ತೊಡೆಯಲಾರ; ಪುಣ್ಯವನ್ನು ಕೂಡಾ. [ಯಾವ ಜೀವಿಯ ಪಾಪ-ಪುಣ್ಯಗಳ ನಂಟೂ ಭಗವಂತನಿಗಿಲ್ಲ.]ಅರಿವಿಗೆ ಅವಿದ್ಯೆಯ ಮುಸುಕಿದೆ. ಅದರಿಂದ ಜನರು ಮೈಮರೆಯುತ್ತಾರೆ.

ಈ ಶ್ಲೋಕವನ್ನು 'ಜೀವದ' ಪರವಾಗಿ ಮತ್ತು 'ಭಗವಂತ'ನ ಪರವಾಗಿ ಎರಡು ರೂಪದಲ್ಲಿ ನೋಡಬಹುದು. 'ಜೀವದ' ಪರದಲ್ಲಿ ನೋಡಿದಾಗ ವಿಭುಃ ಎನ್ನುವ ಪದ ವಿಶಿಷ್ಟ, ವೈವಿಧ್ಯ, ವಿವಿಧ ಇತ್ಯಾದಿ ಅರ್ಥವನ್ನು ಕೊಡುತ್ತದೆ. ಜಡಕ್ಕಿಂತ ವಿಶಿಷ್ಟನಾಗಿ-ಇಚ್ಛೆ, ಯೋಚನೆ, ಜ್ಞಾನ ಇರುವ ಜೀವ ವಿಶಿಷ್ಟ. ಬೇರೆಬೇರೆ ಜನ್ಮದಲ್ಲಿ ಬೇರೆಬೇರೆ ಜೀವಿಯಾಗಿ ಹುಟ್ಟಬಹುದಾದ ಜೀವ, ಒಂದು ಜನ್ಮದಲ್ಲೇ ಅನೇಕ ವೈವಿಧ್ಯತೆಯನ್ನು ಕಾಣಬಹುದು. ಉದಾಹರಣೆಗೆ: ಮನುಷ್ಯನಾದವನು ಶ್ರೀಮಂತನಾಗಿ ಸುಖದ ಸುಪ್ಪತ್ತಿಗೆಯಲ್ಲಿ ಬದುಕಬಹುದು, ದಾರಿದ್ರ್ಯದಲ್ಲಿರಬಹುದು. ದೊಡ್ಡ ವಿದ್ವಾಂಸನಾಗಿ ಬದುಕಬಹುದು ಅಥವಾ ಏನೂ ಅರಿವಿಲ್ಲದ ಮೂಢನಾಗಿ ಬದುಕಬಹುದು. ಈ ರೀತಿಯ ವೈವಿಧ್ಯತೆ ಜೀವದಲ್ಲಿದೆ-ಅದಕ್ಕಾಗಿ ಜೀವ ವಿಭುಃ. ಒಂದೇ ಜನ್ಮದಲ್ಲಿ ಹುಟ್ಟಿ ಸಾಯುವ ತನಕ ಅನೇಕ ಮಜಲುಗಳಲ್ಲಿ ಅನೇಕ ವೈವಿಧ್ಯತೆಯನ್ನು ನಾವು ಅನುಭವಿಸಬಹುದು.

ಶ್ರೀಮಂತನಾಗಿದ್ದವನು ಎಲ್ಲವನ್ನೂ ಕಳೆದುಕೊಂಡು ದಾರಿದ್ರ್ಯವನ್ನು ಪಡೆಯಬಹುದು. ಹೀಗಾದಾಗ ನಾವು ಅದರ ಹಿಂದೆ ಏನೇನೋ ಕಾರಣಗಳನ್ನು ಹುಡುಕುತ್ತೇವೆ. ಸಾಮಾನ್ಯವಾಗಿ ನಾವು ಮಾಡುವ ಮೊದಲ ಕೆಲಸ ಯಾವುದೋ ಜ್ಯೋತಿಷಿಗಳಲ್ಲಿ ಹೋಗಿ ಪ್ರಶ್ನೆ ಹಾಕುವುದು. ಹಾಗೆ ಕೇಳಿದಾಗ ಅವರು ಯಾರೋ ವಾಮಾಚಾರ(**Witchcraft**) ಮಾಡಿದ್ದರಿಂದ ನೀನು ನಷ್ಟ ಅನುಭವಿಸುತ್ತಿರುವುದು ಇತ್ಯಾದಿಯಾಗಿ ಹೇಳುತ್ತಾರೆ. ಆದರೆ ಇಲ್ಲಿ ಕೃಷ್ಣ ಹೇಳುತ್ತಾನೆ: "ಯಾರ ಪಾಪವನ್ನೂ ನೀನು ತೆಗೆದುಕೊಳ್ಳಲು ಬರುವುದಿಲ್ಲ ಹಾಗೂ ಇನ್ನೊಬ್ಬರ ಪುಣ್ಯ ನಮಗೆ ಸಿಗುವುದಿಲ್ಲ. ನಾವು ಏನು ಅನುಭವಿಸುತ್ತೇವೇ ಅದು ನಾವು ಮಾಡಿದ ಕರ್ಮಫಲ" ಎಂದು. ಈ ಕಾರಣದಿಂದ ಇನ್ನೊಬ್ಬರಿಂದ ನಾವು ಹಾಳಾದೆವು ಎಂದು ತಿಳಿಯುವುದು ತಪ್ಪು ಎನ್ನುವುದು ಇಲ್ಲಿ ಸ್ಪಷ್ಟ. ಹಾಗಿದ್ದರೆ ವಾಮಾಚಾರ ಇತ್ಯಾದಿ ಮಾಡಲು ಬರುವುದಿಲ್ಲವೋ, ಅದರಿಂದ ತೊಂದರೆ ಆಗುವುದು ಸುಳ್ಳೋ, ಎಂದರೆ -ನಮ್ಮ ಸುಕೃತದ ಫಲ ನಮ್ಮನ್ನು ರಕ್ಷಣೆ ಮಾಡುವಷ್ಟು ಕಾಲ ಯಾವ ವಾಮಾಚಾರವೂ ನಮ್ಮನ್ನು ಏನೂ ಮಾಡುವುದಿಲ್ಲ. ಇದನ್ನು ಜ್ಯೋತಿಷಿಗಳು "ನಿಮ್ಮ ಗ್ರಹಗತಿ ಚೆನ್ನಾಗಿತ್ತು ಆದ್ದರಿಂದ ಈವರೆಗೆ ಏನೂ ಆಗಿಲ್ಲ, ಆದರೆ ಈಗ ಅದು ಕೆಟ್ಟಿದೆ" ಇತ್ಯಾದಿಯಾಗಿ ಹೇಳುತ್ತಾರೆ. ಇಲ್ಲಿ ಗ್ರಹಗತಿ ಕೆಟ್ಟಿದೆ ಎಂದರೆ ನಮ್ಮ ಪಾಪದ ಫಲ ಪಕ್ವವಾಗಿದೆ ಎಂದರ್ಥ. ಆದ್ದರಿಂದ ಯಾರು ನಮ್ಮ ಮೇಲೆ ಕೃತ್ರಿಮ ಪ್ರಯೋಗ ಮಾಡಿದರೂ, ಅದರಿಂದ ನಮಗೆ ಅನಿಷ್ಟವಾಗಬೇಕಾದರೆ ನಾವು ಹಿಂದೆ ಅನಿಷ್ಟಕರ್ಮ ಮಾಡಿರಬೇಕು. ಅದರ ಫಲವಾಗಿ ಇಲ್ಲಿ ನಮಗೆ ಅದು ಅನುಭವಕ್ಕೆ ಬರುತ್ತದೆ. ನಮ್ಮ ದೋಷಗಳು, ನಮ್ಮ ಬಡತನ, ನಮ್ಮ ಅಜ್ಞಾನ, ರೋಗ-ರುಜಿನ ಇತ್ಯಾದಿಗಳಿಗೆ ಇನ್ನೊಬ್ಬರನ್ನು ತೋರಿಸುವುದು, ಅವರಿಂದ ಹೀಗಾಯ್ತು ಎನ್ನುವುದು ತಪ್ಪು. ನಮಗೆ ರೋಗ ಉಲ್ಬಣವಾಗಿ ಅದನ್ನು ಅನುಭವಿಸುವ ಪ್ರರಾಬ್ಧಕರ್ಮ ಇದ್ದರೆ ಅದನ್ನು ಯಾರಿಂದಲೂ ತಪ್ಪಿಸಲು ಬರುವುದಿಲ್ಲ. ಇದಕ್ಕಾಗಿ ಇನ್ನೊಬ್ಬರ ಮೇಲೆ ಗೂಬೆ ಕೂರಿಸುವುದು ತಪ್ಪು. ಯಾರೋ ಮಾಡಿದ ಪಾಪಕರ್ಮದ ಫಲವನ್ನು ನಾನು ಅನುಭವಿಸುವುದಿಲ್ಲ. ನಾನು ಮಾಡಿದ ಪಾಪ ಕರ್ಮದ ಫಲವನ್ನೇ ನಾನು ಅನುಭವಿಸುವುದು.

ಭಕ್ತನ ಪರ ಪುರೋಹಿತ ಮಾಡುವ ಕರ್ಮ ಭಕ್ತನಿಗೆ ಬರುತ್ತದೆ; ತಂದೆಯ ಪರ ಮಗ ಮಾಡುವ ಕರ್ಮ ತಂದೆಗೆ ಬರಬಹುದು. ಇದು ಒಬ್ಬರ ಪರ ಇನ್ನೊಬ್ಬರು ಮಾಡಿದ ಕರ್ಮ. ಈ ವಿಚಾರವನ್ನು ಹೊರತುಪಡಿಸಿದರೆ(**Exception**) ನಾವು ಅನುಭವಿಸುವುದು ನಾವೇ ಮಾಡಿದ ಕರ್ಮಫಲವೇ ಹೊರತು ಇನ್ನೊಬ್ಬರದ್ದಲ್ಲ.

ಜನರಿಗೆ ಸರಿಯಾದ ಅರಿವಿಲ್ಲದ ಕಾರಣ 'ಇನ್ನೊಬ್ಬರಿಂದ ನನಗೆ ತೊಂದರೆ ಆಯ್ತು' ಎಂದು ತಿಳಿಯುತ್ತಾರೆ. ಇದಕ್ಕೆಲ್ಲಾ ಮೂಲಕಾರಣ ಕರ್ಮದ ಬಗ್ಗೆ, ಜೀವದಬಗ್ಗೆ, ಪರಮಾತ್ಮನ ಬಗ್ಗೆ ಸರಿಯಾದ ಅರಿವು ಇಲ್ಲದಿರುವುದು. ಜ್ಞಾನವೆನ್ನುವುದು ಅಜ್ಞಾನದ ಮುಸುಕಿನಲ್ಲಿ ಮುಚ್ಚಿಹೋಗಿ ಅದರಿಂದ ತಪ್ಪು ತಿಳುವಳಿಕೆ ಹಾಗೂ ಮೋಹದ ಭ್ರಾಂತಿ ನಮ್ಮನ್ನು ಆವರಿಸಿರುವುದು.

ಈ ಶ್ಲೋಕದ ಇನ್ನೊಂದು ಮುಖ ನೋಡಿದರೆ 'ವಿಭುಃ' ಅಂದರೆ ಸರ್ವಸಮರ್ಥನಾದ, ಸರ್ವಗತನಾದ ಭಗವಂತ. ಈ ಅರ್ಥದಲ್ಲಿ ನೋಡಿದಾಗ: ಭಗವಂತನಿಗೆ ಯಾವ ಕರ್ಮದ ಲೇಪವೂ ಇಲ್ಲ. ಆತ ಜೀವ ಸ್ವರೂಪದಲ್ಲಿನ ಅಂತರವನ್ನು ಗುರುತಿಸಿ ಅದಕ್ಕೆ ತಕ್ಕಂತೆಯೇ ಬೆಳವಣಿಗೆಯನ್ನು ಕೊಡುತ್ತಾನೆ. ಆತ ಎಂದೂ ಪಕ್ಷಪಾತಿ ಅಲ್ಲ. (**Equal treatment of unequal is discrimination**). ಪಾಪ-ಪುಣ್ಯ ಎರಡರ ಲೇಪವೂ

ಆತನಿಗಿಲ್ಲ. ಆದರೆ ಭಗವಂತನ ಈ ಕರ್ಮಸಿದ್ಧಾಂತ, ಆತನ ಸರ್ವಸಮರ್ಥತೆ, ಮತ್ತು ಅವನ ನಿರ್ಲಿಪ್ತತೆ, ಇದರ ಅರಿವು ಬಹಳ ಜನಕ್ಕೆ ತಿಳಿದಿಲ್ಲ-ಆದ್ದರಿಂದ ಭಗವಂತನ ಬಗೆಗೆ ಗೊಂದಲಕ್ಕೊಳಗಾಗುತ್ತಾರೆ.

'ನಮಗೆ ಸ್ವತಂತ್ರವಾದ ಕರ್ತೃತ್ವವಿಲ್ಲ, ನಾವು ಆತನ ಅಧೀನ' ಎನ್ನುವ ವಿಚಾರದಲ್ಲಿ ನಾವು ಸದಾ ಗೊಂದಲಕ್ಕೊಳಗಾಗುತ್ತೇವೆ. ಎಲ್ಲವನ್ನೂ ಭಗವಂತನೇ ಮಾಡುವುದಾದರೆ ಪಾಪ ಕರ್ಮಗಳು ನಮಗೇಕೆ ಅನ್ನುವ ಪ್ರಶ್ನೆ ಹೆಚ್ಚಿನವರನ್ನು ಕಾಡುತ್ತದೆ. ಎಷ್ಟು ಅಧ್ಯಯನ ಮಾಡಿದರೂ ಈ ಕರ್ಮಸಿದ್ಧಾಂತ ಅರ್ಥವಾಗುವುದಿಲ್ಲ. ಇದಕ್ಕೆ ಕಾರಣ ಅರಿವಿನ ಅಭಾವ. ಈ ಅರಿವು ಕೇವಲ ಓದುವುದರಿಂದ ಬರುವುದಿಲ್ಲ. ಅದನ್ನು ಗ್ರಹಿಸಿ-ಗ್ರಹಿಸಿ, ಅನುಭವಿಸಿ ಮನವರಿಕೆ ಮಾಡಿಕೊಳ್ಳಬೇಕು. ಇದನ್ನು ಕೃಷ್ಣ ಯಾವುದೇ ಗೊಂದಲಕ್ಕೆ ಅವಕಾಶವಿಲ್ಲದಂತೆ ಮುಂದಿನ ಶ್ಲೋಕದಲ್ಲಿ ವಿವರಿಸಿದ್ದಾನೆ.

ಜ್ಞಾನೇನ ತು ತದಜ್ಞಾನಂ ಯೇಷಾಂ ನಾಶಿತಮಾತ್ಮನಃ ।
ತೇಷಾಮಾದಿತ್ಯವಜ್ ಜ್ಞಾನಂ ಪ್ರಕಾಶಯತಿ ತತ್ ಪರಮ್ ॥೧೬॥

ಜ್ಞಾನೇನ ತು ತತ್ ಅಜ್ಞಾನಮ್ ಯೇಷಾಮ್ ನಾಶಿತಮ್ ಆತ್ಮನಃ ।
ತೇಷಾಮ್ ಆದಿತ್ಯ ವತ್ ಜ್ಞಾನಮ್ ಪ್ರಕಾಶಯತಿ ತತ್ ಪರಮ್-ಭಗವಂತನ ಅರಿವಿನಿಂದ ಅವಿದ್ಯೆಯನ್ನು ಅಳಿಸಿಕೊಂಡವರ ಆ ಅರಿವು-ಸೂರ್ಯನಂತೆ ಪರತತ್ವವನ್ನು ಬೆಳಗಿಸುತ್ತದೆ.

ನಾವು ನಮ್ಮ ಗೊಂದಲವನ್ನು ಪರಿಹರಿಸಿಕೊಳ್ಳಲು ಇರುವುದು ಕೇವಲ ಒಂದೇ ಮಾರ್ಗ. ಜ್ಞಾನ ಮಾರ್ಗದಲ್ಲಿ ಸಾಧನೆ ಮಾಡಿ ಸತ್ಯವನ್ನು ತಿಳಿದುಕೊಳ್ಳುವುದು. ನಮ್ಮ ಸಮಸ್ಯೆ ಅಂದರೆ ನಮ್ಮೊಳಗೆ ಇರುವ ಜೀವ ಸ್ವರೂಪದಲ್ಲಿ ಜ್ಞಾನವಿದೆ-ಆದರೆ ಅದನ್ನು ಅಜ್ಞಾನವೆಂಬ ಮಸುಕು ಕವಿದಿದೆ. ನಾವು ನಮ್ಮ ಜೀವ ಸ್ವರೂಪವನ್ನು ಅಜ್ಞಾನವೆಂಬ ಪೆಟ್ಟಿಗೆಯೊಳಗೆ ಭದ್ರವಾಗಿ ಮುಚ್ಚಿಟ್ಟಿದ್ದೇವೆ. ಜ್ಞಾನಕ್ಕೆ ಮುಚ್ಚಳ-ಅಜ್ಞಾನದ್ದು ಹಾಗೂ ನಮಗೆ ಆ ಮುಚ್ಚಳವನ್ನು ತೆಗೆಯಲು ಇಷ್ಟವಿಲ್ಲ.
ನಾವು ಮೊದಲು ತಿಳಿಯಬೇಕಾದ ಸಂಗತಿ 'ನಾನು ಅಂದರೆ ಏನು' ಎನ್ನುವುದನ್ನು. ಅದು ಗೊತ್ತಾದಾಗ ನನ್ನ ಸೀಮಿತತೆ ಏನು, ನನ್ನ ಶಕ್ತಿ ಏನು, ನನ್ನ ಅಲ್ಪತ್ವವೇನು ಎನ್ನುವುದು ತಿಳಿಯುತ್ತದೆ. ನಮ್ಮ ಇಂದ್ರಿಯದ ಒಡೆತನ ನಮಗಿಲ್ಲ; ನಮ್ಮ ಮನಸ್ಸು ನಾವು ಹೇಳಿದಂತೆ ಕೇಳುವುದಿಲ್ಲ. ಆದ್ದರಿಂದ ನಾನು ಇವೆಲ್ಲವುದರ ಜೊತೆಗಿದ್ದೇನೆ, ಯಾರೋ ಇದನ್ನೆಲ್ಲಾ ಇಲ್ಲಿ ಇಟ್ಟಿದ್ದಾರೆ; ಇಂದ್ರಿಯದಿಂದ ಅನುಭವ ಬರುತ್ತದೆ ನಾನು ಅನುಭವಿಸುತ್ತೇನೆ ಎನ್ನುವ ಅರಿವು ಮೂಡುತ್ತದೆ. ಈ ಇಂದ್ರಿಯಗಳನ್ನು ಕೊಟ್ಟವನ್ಯಾರು, ಅದರಿಂದ ಅನುಭವ ಕೊಡುವವನ್ಯಾರು ಎನ್ನುವುದು ಅರ್ಥವಾದಾಗ, ತಾನು ಕೇವಲ ಪ್ರತಿಬಿಂಬ ಮತ್ತು ಮೂಲ ಬಿಂಬ ಭಗವಂತ ಎನ್ನುವ ಅರಿವು ಮೂಡುತ್ತದೆ.

ನಾವು ಹೇಗೆ ನಮ್ಮ ಅಜ್ಞಾನದ ಪರದೆಯನ್ನು ಕಳಚಿ ಜ್ಞಾನದ ಮಾರ್ಗವನ್ನು ಹಿಡಿಯಬಹುದು ಎನ್ನುವುದನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. "ಜ್ಞಾನ ಎನ್ನುವುದು ಬೆಂಕಿಯಂತೆ. ಒಳಗಿರುವ ಜ್ಞಾನದ ಕಿಡಿಯನ್ನು ಸತತ ಅಂತರಂಗದ ಮನನದಿಂದ ಪ್ರಜ್ವಲಿಸು. ಆಗ ಅದು ಈ ಅಜ್ಞಾನವೆಂಬ ಪರದೆಯನ್ನು ಸುಟ್ಟುಬಿಡುತ್ತದೆ". ನಿರಂತರ ಅಂತರಂಗದ ಮನನ ಮಾತ್ರ ನಮ್ಮ ಅಂತರಂಗದ ಜ್ಞಾನವನ್ನು ಪ್ರಜ್ವಲಿಸಬಲ್ಲದು. ಹೊರಗಿನ ಶ್ರವಣ, ಅಧ್ಯಯನ ಇದಕ್ಕೆ ಪೂರಕ. ಒಮ್ಮೆ ಅಜ್ಞಾನದ ಪರದೆ ಸುಟ್ಟು ನಾಶವಾದಾಗ ನಮಗೆ ಸತ್ಯದ ಸಾಕ್ಷಾತ್ಕಾರವಾಗುತ್ತದೆ. ಇದರಿಂದ 'ನಾನು ಮಾಡಿದೆ' ಎನ್ನುವ ಅಹಂಕಾರ ಬರಲು ಸಾಧ್ಯವೇ ಇಲ್ಲ. ಈ ಜ್ಞಾನದ ಬೆಂಕಿ ಸೂರ್ಯ ಪ್ರಕಾಶಕ್ಕಿಂತ ದೊಡ್ಡದು ಎನ್ನುತ್ತಾನೆ ಕೃಷ್ಣ. ಹೇಗೆ ಹೊರ ಪ್ರಪಂಚವನ್ನು ಸೂರ್ಯ ಬೆಳಗಿಸುತ್ತಾನೋ ಹಾಗೇ ಈ ಜ್ಞಾನ ಅಂತರಂಗ ಪ್ರಪಂಚವನ್ನು ಬೆಳಗಿಸುತ್ತದೆ. ಇದು ಅಪರೋಕ್ಷ ಜ್ಞಾನ ಹಾಗೂ ಈ ಜ್ಞಾನ ಭಗವಂತನ ಸಾಕ್ಷಾತ್ಕಾರ ಮಾಡಿಸುತ್ತದೆ.

ಕೃಷ್ಣನ ಈ ವಿವರಣೆಯನ್ನು ಕೇಳಿದಾಗ ನಮಗೆ ನಾವೂ ಅಪರೋಕ್ಷ ಜ್ಞಾನವನ್ನು ಪಡೆಯಬೇಕು ಅನ್ನಿಸುತ್ತದೆ. ಆದರೆ ಅದು ಹೇಗೆ? ಅಪರೋಕ್ಷ ಜ್ಞಾನ ಬರಬೇಕಾದರೆ ನಾವು ಏನು ಮಾಡಬೇಕು? ಇದನ್ನು ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರಿಸಿದ್ದಾನೆ.

ತದ್ ಬುದ್ಧಯಸ್ತದಾತ್ಮಾನಸ್ತನ್ನಿಷ್ಠಾಸ್ತತ್ ಪರಾಯಣಾಃ ।
ಗಚ್ಛಂತ್ಯ ಪುನರಾವೃತ್ತಿಂ ಜ್ಞಾನನಿರ್ಧೂತಕಲ್ಮಷಾಃ ॥೧೭॥

ತತ್ ಬುದ್ಧಯಃ ತತ್ ಆತ್ಮಾನಃ ತತ್ ನಿಷ್ಠಾಃ ತತ್ ಪರಾಯಣಾಃ ।
ಗಚ್ಛಂತಿ ಅಪುನಃ ಆವೃತ್ತಿಮ್ ಜ್ಞಾನ ನಿರ್ಧೂತ ಕಲ್ಮಷಾಃ -ಅವನಲ್ಲೇ ಬಗೆ ನೆಟ್ಟವರು, ಅವನೇ ಸ್ವಾಮಿಯೆಂದು ನಂಬಿದವರು, ಅವನಲ್ಲೇ ನೆಲೆಗೊಡವರು, ಅವನಿಗೇ ಶರಣಾದವರು, ಅವನನ್ನು ಕಂಡು ಬಾಳ ಕೊಳೆಯನ್ನು ಕಳೆದುಕೊಂಡವರು ಮತ್ತೆ ಮರಳಿಬಾರದ ತಾಣಕ್ಕೆ ತೆರಳುತ್ತಾರೆ.

ಅಜ್ಞಾನವನ್ನು ಅಳಿಸುವ ಮಾರ್ಗವನ್ನು ಕೃಷ್ಣ ಇಲ್ಲಿ ಸೊಗಸಾಗಿ ವಿವರಿಸಿದ್ದಾನೆ. ಮೊದಲನೆಯದಾಗಿ ಭಗವಂತನಲ್ಲೇ ಬುದ್ಧಿಯನ್ನಿಡುವುದು(ತತ್ ಬುದ್ಧಯಃ); ನಮ್ಮ ಮನಸ್ಸು ಎಲ್ಲಾ ವಿಷಯಗಳನ್ನು ಗ್ರಹಿಸುತ್ತದೆ, ಬುದ್ಧಿ ತೀರ್ಮಾನ ಮಾಡುತ್ತದೆ. ನಾವು ಭಗವಂತನಲ್ಲಿ ಸ್ಥಿರವಾಗಿ ನಮ್ಮ ಬುದ್ಧಿಯನ್ನು ಇಟ್ಟರೆ ಆತ ನಮ್ಮ ಬುದ್ಧಿಯಲ್ಲಿ ಬಂದು ಕೂರುತ್ತಾನೆ. ಇದಕ್ಕಾಗಿ ನಾವು ಭಗವಂತನ ಕುರಿತಾಗಿ ನಮ್ಮ ಅರಿವನ್ನು ಬೆಳೆಸಿಕೊಳ್ಳಬೇಕು. ಭಗವಂತನ ವಿಷಯದ ನಿರಂತರ ಸಾಧನೆಯಿಂದ ನಾವು ಭಗವಂತನಲ್ಲಿ ನಮ್ಮ ಬುದ್ಧಿಯನ್ನು ನೆಲೆಗೊಳಿಸಿದಾಗ, ಭಗವಂತ ನಮ್ಮ ಬುದ್ಧಿಯಲ್ಲಿ ನೆಲೆಗೊಳ್ಳುತ್ತಾನೆ.
ಭಗವಂತನಿಗೆ ನಿನ್ನ ಆತ್ಮವನ್ನು, ನಿನ್ನ ಮನಸ್ಸನ್ನು ಅರ್ಪಿಸು(ತತ್ ಆತ್ಮಾನಃ); ಅವನು ನಿನ್ನ ಸ್ವಾಮಿಯಾಗಲಿ, ನೀನು 'ಭಗವಂತನೇ ಸದಾ ನನ್ನನ್ನು ಮಾರ್ಗದರ್ಶನ ಮಾಡುವ ಪ್ರಭು, ಅವನ ನಿಯಂತ್ರಣದಲ್ಲಿ ನನ್ನ ಬದುಕು ಮಾಂಗಲಿಕವಾಗಿ ನಡೆಯಲಿ' ಎಂದು ನಿರಂತರ ಪ್ರಾರ್ಥನೆ ಮಾಡು.

ಭಗವಂತನಲ್ಲಿ ನಿಷ್ಠೆ(ತತ್ ನಿಷ್ಠಾಃ) ಇಲ್ಲದೇ ಇದ್ದರೆ ಏನನ್ನೂ ಮಾಡಲು ಸಾಧ್ಯವಿಲ್ಲ. ನಿಷ್ಠಾ ಅಂದರೆ ಭಕ್ತಿ. ಆದ್ದರಿಂದ ಭಗವಂತನಲ್ಲಿ ಸದಾ ಭಕ್ತಿ ಇರಬೇಕು. ಭಕ್ತಿ ಇಲ್ಲದೆ ಧ್ಯಾನ, ಪೂಜೆ ಮಾಡುವುದರಿಂದ ಯಾವುದೇ ಉಪಯೋಗವಿಲ್ಲ. ಒಮ್ಮೆ ನಮಗೆ ಭಗವಂತನ ಬಗ್ಗೆ ಜ್ಞಾನ ಬಂದರೆ ಭಕ್ತಿ ತನ್ನಷ್ಟಕ್ಕೆ ತಾನೇ ಬರುತ್ತದೆ. ಜ್ಞಾನವಿಲ್ಲದ ಭಕ್ತಿ-ಮೂಡಭಕ್ತಿ. ಜ್ಞಾನವಿದ್ದು ಭಕ್ತಿ ಇಲ್ಲದಿದ್ದರೆ(ಅಹಂಕಾರದಿಂದ) ಆ ಜ್ಞಾನದಿಂದ ಯಾವ ಉಪಯೋಗವೂ ಇಲ್ಲ, ಅದು ಶುಷ್ಕ ಪಾಂಡಿತ್ಯವೆನಿಸುತ್ತದೆ.

ಹೀಗೆ ಮನಸ್ಸು-ಬುದ್ಧಿಯನ್ನು ಭಗವಂತನಲ್ಲಿ ನೆಲೆಸಿ ಜ್ಞಾನಪೂರ್ವಕ ಭಕ್ತಿಯನ್ನು ರೂಢಿಸಿಕೊಂಡಾಗ, ಎಲ್ಲಕ್ಕಿಂತ ದೊಡ್ಡ ಆಶ್ರಯ ಭಗವಂತ(ತತ್ ಪರಾಯಣಾಃ) ಎನ್ನುವ ಅರಿವು ಬರುತ್ತದೆ. ಇದರಿಂದ ಸಂಸಾರವೇ ಸರ್ವಸ್ವ ಎನ್ನುವ ಭ್ರಮೆ ಹೊರಟು ಹೋಗುತ್ತದೆ. ಪುರಂದರದಾಸರು ಹೇಳಿದಂತೆ: "ಅಲ್ಲಿದೆ ನಮ್ಮನೆ, ಇಲ್ಲಿರುವುದು ಸುಮ್ಮನೆ". ಅಂದರೆ ಈ ಸಂಸಾರ ಶಾಶ್ವತ ಅಲ್ಲ ಹಾಗೂ ಯಾವಾಗ ಇಲ್ಲಿಂದ ಹೊರಡಬೇಕೋ ನಮಗೆ ಗೊತ್ತಿಲ್ಲ. ಹಾಗಿರುವಾಗ 'ನನ್ನದು' ಎನ್ನುವ ಅಹಂಕಾರ ಏಕೆ? ಇದು ಪಲಾಯನವಾದವಲ್ಲ, ನಾವು ಯಾವುದನ್ನೂ ಬಿಡಬೇಕಾಗಿಲ್ಲ, ಆದರೆ ಅದೇ ಸರ್ವಸ್ವ ಎನ್ನುವ ಭ್ರಮೆಯನ್ನು ಬಿಡುವುದು ಅಷ್ಟೇ. ಭಗವಂತ ಕೊಟ್ಟಿದ್ದಾನೆ, ಕೊಟ್ಟಷ್ಟು ಕಾಲ ಇಟ್ಟಷ್ಟು ಕಾಲ ಇರುವುದು. ಅದೇ ರೀತಿ ಯಾವ ತತ್ತ್ವಾಭಿಮಾನಿ ದೇವತೆಗಳನ್ನೂ ನಾವು ತಿರಸ್ಕರಿಸಬಾರದು. ಅವರು ನಮಗೆ ಭಗವಂತನನ್ನು ಸೇರುವ ಮಾರ್ಗ ತೋರಿಸುವ ಭಗವಂತನ ಪರಿವಾರ, ಆದರೆ ಅವರೇ ಸರ್ವಸ್ವ ಅಲ್ಲ.

ಎಲ್ಲಕ್ಕಿಂತ ಮೇಲೆ ಎಲ್ಲರಿಗೂ ಆಶ್ರಯವಾಗಿರತಕ್ಕಂತಹ ಪರತತ್ವದ ಎಚ್ಚರದೊಂದಿಗೆ ನಿನ್ನ ಪಾಲಿಗೆ ಬಂದ ಕರ್ತವ್ಯವನ್ನು ಭಗವಂತನ ಪ್ರಸಾದವೆಂದು ಮಾಡು. ಓಡಿಹೋಗಬೇಡ, ಸಂಸಾರದಲ್ಲಿ ಬದುಕು, ಭಗವಂತ ಏನು ಕೊಟ್ಟ ಅದನ್ನು ಸ್ವೀಕರಿಸು. ನಿನ್ನೆಲ್ಲಾ ಸರ್ವಸ್ವವನ್ನು 'ಪರಮ ರಕ್ಷಕ ಭಗವಂತ' ಎಂದು ಅವನಲ್ಲಿ ಅರ್ಪಿಸು. ಹೀಗೆ ಬದುಕುವುದರಿಂದ, ನಮ್ಮ ಆತ್ಮಕ್ಕೆ ಅಂಟಿದ ಕೊಳೆ ತೊಳೆದು ಹೋಗುತ್ತದೆ, ಮನಸ್ಸು ಸ್ವಚ್ಛವಾಗುತ್ತದೆ. ಆಗ ಜ್ಞಾನ ಬೆಳಗುತ್ತದೆ-ಭಗವಂತನ ಸಾಕ್ಷಾತ್ಕಾರವಾಗುತ್ತದೆ. ಇದರಿಂದ ಮತ್ತೆ ಮರಳಿ ಬಾರದ ಶಾಶ್ವತ ಮೋಕ್ಷವನ್ನು ಜೀವ ಪಡೆಯಬಲ್ಲ.

ವಿದ್ಯಾವಿನಯಸಂಪನ್ನೇ ಬ್ರಾಹ್ಮಣೇ ಗವಿ ಹಸ್ತಿನಿ ।
ಶುನಿ ಚೈವ ಶ್ವಪಾಕೇ ಚ ಪಂಡಿತಾಃ ಸಮದರ್ಶಿನಃ ॥೧೮॥

ವಿದ್ಯಾ ವಿನಯ ಸಂಪನ್ನೇ ಬ್ರಾಹ್ಮಣೇ ಗವಿ ಹಸ್ತಿನಿ ।
ಶುನಿ ಚ ಏವ ಶ್ವಪಾಕೇ ಚ ಪಂಡಿತಾಃ ಸಮದರ್ಶಿನಃ –ನಿಜವಾದ ಪಂಡಿತ-ವಿದ್ಯಾವಿನಯಸಂಪನ್ನ, ಬ್ರಾಹ್ಮಣವರ್ಣ, ಆಕಳು, ಆನೆ, ನಾಯಿ, ಹೊಲಗೇಡಿ ಹೀನ ಮಾನವನಲ್ಲಿ ಕೂಡಾ ಏಕರೂಪನಾದ ಭಗವಂತನನ್ನು ಕಾಣಬಲ್ಲ.

ಈ ಶ್ಲೋಕ ಬಹಳ ಮಂದಿಗೆ ಅರ್ಥವಾಗುವುದಿಲ್ಲ ಅಥವಾ ಅರ್ಥವಾಗದೇ ಅಪಾರ್ಥ ಮಾಡಿಕೊಳ್ಳುವವರೇ ಹೆಚ್ಚು. ಒಬ್ಬ ಸಾಧಕನ ಉಪಾಸನೆಯಲ್ಲಿ ಇರಬೇಕಾದ ಇನ್ನೊಂದು ಮುಖವನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ಇದು

ತುಂಬಾ ಒಳ ನೋಟವನ್ನು ಅಪೇಕ್ಷಿಸುವ ಶ್ಲೋಕ. ಇಲ್ಲಿ ಮೂರು ತರಹದ ಮನುಷ್ಯನ ಸ್ಥಿತಿಯನ್ನು ಮತ್ತು ಮೂರು ತರಹದ ಪ್ರಾಣಿಗಳ ಸ್ಥಿತಿಯನ್ನು ಕೃಷ್ಣ ವಿವರಿಸಿದ್ದಾನೆ. ಮಾನವರಲ್ಲಿ: ವಿದ್ಯಾವಿನಯಸಂಪನ್ನ, ಬ್ರಾಹ್ಮಣ ಮತ್ತು ಶ್ವಪಾಕ. ಪ್ರಾಣಿಗಳಲ್ಲಿ: ಗೋವು, ಆನೆ ಮತ್ತು ನಾಯಿ.

ಮನುಷ್ಯರಲ್ಲಿ ಜ್ಞಾನದ ತುತ್ತ ತುದಿಯನ್ನು ತಲುಪಿದವ ಮತ್ತು ಅತ್ಯಂತ ಶ್ರೇಷ್ಠ 'ವಿದ್ಯಾ ವಿನಯಸಂಪನ್ನ'. ವೇದದ ಕೆಲವು ಭಾಗವನ್ನು ಪ್ರಾಮಾಣಿಕವಾಗಿ ಮನನ ಮಾಡಿ ಉಪಾಸನೆ ಮಾಡುವವ ಬ್ರಾಹ್ಮಣ. (ಇಲ್ಲಿ ಹೇಳುವ ಬ್ರಾಹ್ಮಣ-ಬ್ರಾಹ್ಮಣವರ್ಣ; ಜಾತಿ ಅಲ್ಲ. ಈ ಬಗ್ಗೆ ವಿಶೇಷವಾಗಿ ಹಿಂದಿನ ಅಧ್ಯಾಯದಲ್ಲಿ ವಿಶ್ಲೇಶಿಸಿದ್ದೇವೆ). ಸಮಸ್ತ ವೇದವನ್ನು ಓದಿ ಆ ವೇದೋಕ್ತವಾದ ವಿಧಾನವನ್ನು ಜೀವನದಲ್ಲಿ ಅಳವಡಿಸಿಕೊಂಡವ ವೇದಜ್ಞ. ವೇದದ ಅಂತರಂಗದ ಅರ್ಥವನ್ನು ತಿಳಿದವ 'ವೇದ ಅರ್ಥಜ್ಞ'-ಆತನೇ 'ವಿದ್ಯಾ ವಿನಯಸಂಪನ್ನ'

ಮಾನವರಲ್ಲಿ ಅತೀ ಕೀಳು ಅಂದರೆ ಶ್ವಪಾಕ. ಶ್ವಪಾಕ ಎಂದರೆ ನಾಯಿಯ ಮಾಂಸ ತಿನ್ನುವವ ಎಂದರ್ಥ. ಅಂದರೆ ಆತನಿಗೆ ಯಾವ ಸಂಸ್ಕಾರವೂ ಇಲ್ಲ, ಹೊಟ್ಟೆಗಾಗಿ ಏನನ್ನಾದರೂ ತಿನ್ನುವವ. ಇದು ಮನುಷ್ಯನ ಅಧಃಪತನದ ಪರಾಕಾಷ್ಠೆಯನ್ನು ಹೇಳುವಂತಾದ್ದು. ಹೀಗೆ ಅತ್ಯಂತ ಎತ್ತರಕ್ಕೇರಿದ ವಿದ್ಯಾವಿನಯಸಂಪನ್ನ, ಅದರಿಂದ ಕೆಳಗೆ ಬ್ರಾಹ್ಮಣವರ್ಣ, ಅತ್ಯಂತ ಕೆಳಗೆ ಶ್ವಪಾಕ.

ಪ್ರಾಣಿಗಳಲ್ಲಿ ಗವಿ(ಗೋವು) ಅತ್ಯಂತ ಶ್ರೇಷ್ಠ ಪ್ರಾಣಿ. ಅದರ ನಂತರ ಮಧ್ಯಮ ಹಸ್ತಿನಿ(ಆನೆ), ಕೊನೆಗೆ ನಾಯಿ. ಪ್ರಾಚೀನರು ಮನಸ್ಸನ್ನು ಯಾವುದು ಶುದ್ಧಗೊಳಿಸುತ್ತದೇ, ಅದನ್ನು 'ಶುದ್ಧ' ಎಂದು ತೀರ್ಮಾನ ಮಾಡಿದರು. ಉದಾಹರಣೆಗೆ ಜಿಂಕೆ ಮತ್ತು ಹುಲಿ ಚರ್ಮ ಮನಸ್ಸನ್ನು ಏಕಾಗ್ರ ಮಾಡಲು ಸಹಕರಿಸುತ್ತದೆ.ಭೂಮಿಯಲ್ಲಿನ ಕೆಟ್ಟ ಕಂಪನ ಧ್ಯಾನದ ಕಾಲದಲ್ಲಿ ನಮ್ಮ ದೇಹವನ್ನು ಪ್ರವೇಶಿಸದಂತೆ ತಡೆಯಲು ಈ ಚರ್ಮವನ್ನು ಉಪಯೋಗಿಸುತ್ತಾರೆ. ಆದ್ದರಿಂದ ಅದು ಶುದ್ಧ ಮತ್ತು ಶ್ರೇಷ್ಠ. ಅದೇ ರೀತಿ ಗೋವು; ಈ ಪ್ರಾಣಿಯಲ್ಲಿ ಯಾವಾಗಲೂ ಸಾತ್ವಿಕವಾದ ಸ್ಪಂದನ(Vibration)ವಿರುತ್ತದೆ. ಹಸುವಿನಲ್ಲಿರುವ ಇನ್ನೊಂದು ಶ್ರೇಷ್ಠ ಅಂಶ ಎಂದರೆ: ಈ ಪ್ರಪಂಚದಲ್ಲಿ ಎಲ್ಲಾ ಪ್ರಾಣಿಗಳ ಮಲ-ಮೂತ್ರ ವರ್ಜ್ಯ. ಆದರೆ ಹಸುವಿನ ಮಲ ಮೂತ್ರ ಶ್ರೇಷ್ಠ. ಹೀಗೆ ಪ್ರಾಣಿಗಳಲ್ಲಿ ಹಸು ಅತ್ಯಂತ ಶ್ರೇಷ್ಠ. ಗೃಹಪ್ರವೇಶ ಕಾಲದಲ್ಲಿ ಹಸುವನ್ನು ಮೊದಲು ಮನೆಯೊಳಗೆ ತರುವುದಕ್ಕೆ ಇದೇ ಕಾರಣ.

ಪ್ರಾಚೀನರು ನಾಯಿಯನ್ನು ಅತ್ಯಂತ ಕೆಳವರ್ಗ ಎಂದು ಪರಿಗಣಿಸಿದರು. ನಮಗೆ ತಿಳಿದಂತೆ ನಾಯಿ ತನ್ನ ಯಜಮಾನನಿಗಾಗಿ ತನ್ನ ಪ್ರಾಣವನ್ನೇ ಕೊಡಲು ಸಿದ್ಧವಿರುವ ಸಾಕು ಪ್ರಾಣಿ. ಆದರೆ ಇದು ಅತಿ ಹೆಚ್ಚು ತಾಮಸಿಕ ಸ್ಪಂದನ(Vibration)ವಿರುವ ಪ್ರಾಣಿ. ಆದ್ದರಿಂದ ನಾಯಿಯಿಂದ ನಮ್ಮ ಮಾನಸಿಕ ಅಭಿವೃದ್ಧಿಗೆ ಏನೂ ಪೋಷಣೆ ಇಲ್ಲ. ಈ ಕಾರಣದಿಂದ ನಾಯಿಯನ್ನು ಪ್ರಾಚೀನರು ಅತ್ಯಂತ ಕನಿಷ್ಠ ಸ್ಥಾನದಲ್ಲಿರಿಸಿದರು. ನಾಯಿಯನ್ನು ಎಂದೂ ಮನೆಯೊಳಗೆ ಸೇರಿಸದಿರಲು ಇದು ಕಾರಣ. ಹೀಗೆ ಪ್ರಾಣಿಗಳಲ್ಲಿ ಹಸು ಶ್ರೇಷ್ಠ, ಆನೆ ಮಧ್ಯಮ ಮತ್ತು ನಾಯಿ ಕನಿಷ್ಠ.

ಇಲ್ಲಿ ಕೃಷ್ಣ ಹೇಳುತ್ತಾನೆ: "ಪಂಡಿತಾಃ ಸಮದರ್ಶಿನಃ" ಎಂದು. ಅಂದರೆ ಪಂಡಿತರು ಸಮದೃಷ್ಟಿ ಉಳ್ಳವರಾಗಿರುತ್ತಾರೆ ಎಂದರ್ಥ. ಅವರು ಪ್ರತಿಯೊಂದರಲ್ಲೂ, ಅದರೊಳಗಿರುವ ಭಗವಂತನ ವಿಶೇಷ ಅಭಿವ್ಯಕ್ತವನ್ನು ಕಾಣುತ್ತಾರೆ. ಹಸುವಾಗಿರಲಿ, ನಾಯಿಯಾಗಿರಲಿ, ವಿದ್ಯಾವಿನಯಸಂಪನ್ನರಾಗಿರಲಿ ಏನೇ ಇರಲಿ. ಏಕೆಂದರೆ ಭಗವಂತ ಸರ್ವಾಂತರ್ಯಮಿ, ಆತ ಎಲ್ಲರ ಒಳಗೂ ಇದ್ದಾನೆ. ಆತನ ಅಭಿವ್ಯಕ್ತಿ ಮಾತ್ರ ಬೇರೆ ಬೇರೆ.

ಆತ ಒಂದೊಂದು ಜೀವಿಯಲ್ಲೂ ಒಂದೊಂದು ಅನನ್ಯ ಅಸಾಧಾರಣ ಗುಣಧರ್ಮ(Exclusive Quality)ದಿಂದ ಅಭಿವ್ಯಕ್ತನಾಗುತ್ತಾನೆ. ಉದಾಹರಣೆಗೆ: ಮುಟ್ಟಿದರೆ ಮುನಿ ಗಿಡ (Touch me not); ಯಾರಿಗೂ ಬೇಡವಾಗಿ ಬೆಳೆಯುವ ಈ ಗಿಡದಲ್ಲಿ ಅಮೋಘವಾದ ಔಷಧೀಯ ಗುಣವಿದೆ. ಈ ಗಿಡವನ್ನು (ಹೂ ರಹಿತ) ಜಜ್ಜಿ ಬಟ್ಟೆಯಲ್ಲಿ ಕಟ್ಟಿ ಗಂಜಿಯ ಜೊತೆಗೆ ಬೇಯಿಸಿ, ಆ ಗಂಜಿಯನ್ನು ಸೇವಿಸಿದರೆ ಅಥವಾ ಈ ಗಿಡದ ಕಷಾಯಮಾಡಿ ಕುಡಿದರೆ, ಯಾವುದೇ ಶಸ್ತ್ರಚಿಕಿತ್ಸೆ ಇಲ್ಲದೇ ಮೂಲವ್ಯಾಧಿ(Piles) ಗುಣಮುಖವಾಗುತ್ತದೆ. ಅದೇ ರೀತಿ ಜೇನುನೊಣ: ಹೂವಿಂದ ರಸವನ್ನು ಹೀರಿ ಜೇನನ್ನು ತಯಾರಿಸುವ ಅಸಾಧಾರಣ ಶಕ್ತಿ ಇರುವುದು ಈ ಪುಟ್ಟ ಹುಳದಲ್ಲಿ. ನಮ್ಮ ತಾಂತ್ರಿಕತೆಯಿಂದ ಕೃತಕವಾಗಿ ಜೇನನ್ನು ತಯಾರಿಸಲು ಬರುವುದಿಲ್ಲ.

ಈ ಪ್ರಪಂಚದಲ್ಲಿ ಏನೇನು ಹುಟ್ಟುತ್ತದೋ ಅದರೊಳಗೆ ವಿಶಿಷ್ಟ ಶಕ್ತಿಯಾಗಿ ತುಂಬಿರುವ, ನಿಯಾಮಕ ಶಕ್ತಿಯಾದ ಜನೇಶ್ವರ ಭಗವಂತನನ್ನು ಅಪರೋಕ್ಷ ಜ್ಞಾನಿಗಳು ಪ್ರತ್ರಿಯೊಂದರಲ್ಲೂ ಕಾಣುತ್ತಾರೆ. ನಾಯಿ ಇರಲಿ, ಹಸು ಇರಲಿ, ಶ್ವಪಾಕನಿರಲಿ, ವಿದ್ಯಾವಿನಯಸಂಪನ್ನನಿರಲಿ. ಪಂಡಿತ-ಎಲ್ಲವುದರಲ್ಲೂ ಆ ಭಗವಂತನ ಮಹಿಮೆಯನ್ನೇ ಕಾಣುತ್ತಾನೆ.

ತಾನು ಎಲ್ಲವುದರಲ್ಲೂ ಅಂತರ್ಯಾಮಿಯಾಗಿ ಅತ್ಯಂತ ಶುದ್ಧನಾಗಿ ತುಂಬಿದ್ದು, ನಿರ್ಲಿಪ್ತನಾಗಿ, ಒಂದೊಂದು ವಸ್ತುವಿಗೆ ಒಂದೊಂದು ರೀತಿಯ ವಿಶಿಷ್ಟ ಶಕ್ತಿಯನ್ನು ಕೊಡುವ ಭಗವಂತ, ಈ ಅನಂತ ಪ್ರಪಂಚವನ್ನು ಸೃಷ್ಟಿ ಮಾಡಿ ನಮ್ಮ ಕಣ್ಣ ಮುಂದೆ ಇಟ್ಟ. ಇಂತಹ ಭಗವಂತನ ಮಹಿಮೆಯನ್ನು ಪ್ರತಿಯೊಂದು ವಸ್ತುವಿನಲ್ಲೂ ನೋಡಿ ಅನುಸಂಧಾನ ಮಾಡಬೇಕು. ಆತ ಎಲ್ಲಾ ಕಡೆಯೂ ಜ್ಞಾನಾನಂದಪೂರ್ಣನಾಗಿ, ಸರ್ವಗುಣಪೂರ್ಣ-ಸರ್ವಗತನಾಗಿ, ಪ್ರತಿಯೊಂದು ಅಣು-ಕಣದೊಳಗೆ ತುಂಬಿದ್ದಾನೆ ಎನ್ನುವ ಅನುಸಂಧಾನ -ಅಪರೋಕ್ಷ ಜ್ಞಾನಕ್ಕೆ ಬೇಕಾದ ಸಮದರ್ಶನ.

ಇಹೈವ ತೈರ್ಜಿತಃ ಸರ್ಗೋ ಯೇಷಾಂ ಸಾಮ್ಯೇ ಸ್ಥಿತಂ ಮನಃ ।
ನಿರ್ದೋಷಂ ಹಿ ಸಮಂ ಬ್ರಹ್ಮ ತಸ್ಮಾದ್ ಬ್ರಹ್ಮಣಿ ತೇ ಸ್ಥಿತಾಃ ॥೧೯॥

ಇಹ ಏವ ತೈಃ ಜಿತಃ ಸರ್ಗಃ ಯೇಷಾಮ್ ಸಾಮ್ಯೇ ಸ್ಥಿತಮ್ ಮನಃ ।
ನಿರ್ದೋಷಮ್ ಹಿ ಸಮಮ್ ಬ್ರಹ್ಮ ತಸ್ಮಾತ್ ಬ್ರಹ್ಮಣಿ ತೇ ಸ್ಥಿತಾಃ -ಭಗವಂತನ ಏಕ ರೂಪತೆಯಲ್ಲಿ ಬಗೆ ನೆಟ್ಟವರು ಇಲ್ಲಿದ್ದೇ ಈ ಬಾಳನ್ನು ಗೆದ್ದವರು. ಭಗವಂತ ಎಲ್ಲೆಡೆಯೂ ದೋಷದ ನಂಟಿರದ ಏಕರೂಪಿ. ಆದ್ದರಿಂದ ಹೀಗೆ ತಿಳಿದವರು ಭಗವಂತನಲ್ಲಿ ನೆಲೆಗೊಂಡವರು.

ಎಲ್ಲಾ ಕಡೆ ಇರುವ ಸರ್ವಗುಣಪೂರ್ಣ ಭಗವಂತ ಎಲ್ಲಾ ವಸ್ತುವಿನಲ್ಲಿಯೂ ತುಂಬಿದ್ದಾನೆ ಎನ್ನುವ ಅನುಸಂಧಾನದಲ್ಲಿ ನಮ್ಮ ಮನಸ್ಸು ನೆಟ್ಟಾಗ ಹುಟ್ಟು ಸಾವಿನ ಆಚೆಗಿನ ಮೋಕ್ಷದ ಬಾಗಿಲು ನಮಗೆ ತೆರೆದಂತೆ. ಭಗವಂತ ಯಾವ ವಸ್ತುವಿನಲ್ಲಿದ್ದರೂ ಅವನಿಗೆ ದೋಷವಿಲ್ಲ, ಆತ ಎಲ್ಲಾ ಕಡೆ ನಿರ್ದುಷ್ಟನಾಗಿದ್ದಾನೆ. ಯಾವ ಅಧಿಷ್ಠಾನದಲ್ಲಿದ್ದರೂ ಕೂಡಾ ಆತ ನಿರ್ಲಿಪ್ತನಾಗಿ ಅಲ್ಲಿ ತುಂಬಿದ್ದಾನೆ. ಇದನ್ನು ತಿಳಿದವರ ಮನಸ್ಸು

ಭಗವಂತನಲ್ಲಿ ನೆಲೆ ನಿಂತಿರುತ್ತದೆ. ಆದ್ದರಿಂದ ಅವರು ಮರಳಿ ಬಂಧನಕ್ಕೊಳಗಾಗದೇ ಶಾಶ್ವತ ಮೋಕ್ಷವನ್ನು ಪಡೆಯುತ್ತಾರೆ.

ಹಿಂದಿನ ಶ್ಲೋಕದಲ್ಲಿ ಕೃಷ್ಣ ಆಧ್ಯಾತ್ಮಿಕವಾಗಿ ಭಗವಂತನ ರೂಪದ ಸಮದೃಷ್ಟಿ ಬಗ್ಗೆ ವಿವರಿಸಿದ. ಮುಂದಿನ ಶ್ಲೋಕದಲ್ಲಿ ಅದಕ್ಕೆ ಪೂರಕವಾಗಿ ಸಾಮಾಜಿಕವಾಗಿ ನಮ್ಮ ಬದುಕಿನಲ್ಲಿ ಹೇಗೆ ಸಮದೃಷ್ಟಿ ಬೆಳೆಸಿಕೊಳ್ಳಬೇಕು ಎನ್ನುವುದನ್ನು ವಿವರಿಸುತ್ತಾನೆ.

ನ ಪ್ರಹೃಷ್ಯೇತ್ ಪ್ರಿಯಂ ಪ್ರಾಪ್ಯ ನೋದ್ವಿಜೇತ್ ಪ್ರಾಪ್ಯ ಚಾಪ್ರಿಯಮ್ ।
ಸ್ಥಿರಬುದ್ಧಿರಸಮ್ಮೂಢೋ ಬ್ರಹ್ಮವಿದ್ ಬ್ರಹ್ಮಣಿ ಸ್ಥಿತಃ ॥೨೦॥

ನ ಪ್ರಹೃಷ್ಯೇತ್ ಪ್ರಿಯಮ್ ಪ್ರಾಪ್ಯ ನ ಉದ್ವಿಜೇತ್ ಪ್ರಾಪ್ಯ ಚ ಅಪ್ರಿಯಮ್ ।
ಸ್ಥಿರ ಬುದ್ಧಿಃ ಅಸಮ್ಮೂಢಃ ಬ್ರಹ್ಮವಿತ್ ಬ್ರಹ್ಮಣಿ ಸ್ಥಿತಃ –ಸುಖ ಬಂದಾಗ ಹಿಗ್ಗಬಾರದು; ದುಃಖ ಬಂದಾಗ ಕುಗ್ಗಬಾರದು. ಇಂಥವನು ಬಗೆಗಟ್ಟಿಗೊಂಡವನು. ಎಚ್ಚರ ತಪ್ಪದವನು. ಭಗವಂತನನ್ನರಿತವನು. ಭಗವಂತನಲ್ಲೇ ನೆಲೆ ನಿಂತವನು.

ನಮ್ಮ ಜೀವನ ಎನ್ನುವುದು ಸುಖ-ದುಃಖದ ಚಕ್ರಭ್ರಮಣ. ಯಾರಿಗೂ ಕೇವಲ ಸುಖ ಎಂದಾಗಲೀ, ಕೇವಲ ದುಃಖ ಎಂದಾಗಲೀ ಇಲ್ಲ. ಎಂತಹ ಸಂಪತ್ತಿನ ಸುಪ್ಪತ್ತಿಗೆಯಲ್ಲಿದ್ದರೂ ಜೀವನದಲ್ಲಿ ಕಷ್ಟದ ಕ್ಷಣಗಳು ಇದ್ದೇ ಇರುತ್ತವೆ. ಅದೇ ರೀತಿ ಕಷ್ಟದಲ್ಲಿರುವವನಿಗೂ ಸುಖದ ಕ್ಷಣಗಳು ಇದ್ದೇ ಇದೆ. ಬದುಕು ಎನ್ನುವುದು ಸುಖ ದುಃಖಗಳ ಪ್ರವಾಹ. ಈ ಶ್ಲೋಕದಲ್ಲಿ ಕೃಷ್ಣ ಹೇಳುತ್ತಾನೆ: "ನಮಗೆ ಸುಖ-ದುಃಖವೆಂಬ ದ್ವಂದ್ವದಲ್ಲಿ ಸಮದೃಷ್ಟಿ ಇರಬೇಕು" ಎಂದು. ಸಾಮಾನ್ಯವಾಗಿ ನಮಗೆ ಇಷ್ಟವಾದದ್ದು ಫಲಿಸಿದಾಗ ನಾವು ಹಿಗ್ಗುತ್ತೇವೆ. ನಮಗೆ ಅಪ್ರಿಯವಾದದ್ದು, ನಾವು ಬಯಸದಂತಹ ಘಟನೆಗಳು ಸಂಭವಿಸಿದಾಗ ಉದ್ವೇಗಕ್ಕೊಳಗಾಗಿ ಕುಸಿದುಬಿಡುತ್ತೇವೆ, ತಳಮಳಿಸುತ್ತೇವೆ. ಇದು ಸಹಜವಾಗಿ ನಮ್ಮ ಬದುಕಿನಲ್ಲಿ ನಾವು ನೋಡತಕ್ಕಂತಹ ಸ್ಥಿತಿ. ಕೃಷ್ಣ ಹೇಳುತ್ತಾನೆ: "ಇವೆರಡೂ ಆಗದಂತೆ ಮನಸ್ಸನ್ನು ಸ್ಥಿಮಿತದಲ್ಲಿಟ್ಟುಕೊಳ್ಳಬೇಕು" ಎಂದು. ಯಾವುದು ಅನಿವಾರ್ಯವೋ ಅದನ್ನು ಸಹಜವಾಗಿ ಸ್ವೀಕರಿಸಬೇಕು. ಅದನ್ನು ಬಿಟ್ಟು 'ಹೀಗಾಗಬಾರದು, ಹಾಗಾಗಬಾರದು' ಎಂದು ಕುಳಿತರೆ ಮನಸ್ಸು ಗೊಂದಲಕ್ಕೊಳಗಾಗುತ್ತದೆ. ಇದು ಮನಃಶಾಸ್ತ್ರ. ಇದರ ಅರ್ಥ ಸುಖ ಬಂದಾಗ ಅದನ್ನು ಅನುಭವಿಸಬಾರದು ಎಂದಲ್ಲ. ಯಾವುದು ಬಂತೋ ಅದನ್ನು ಹಾಗೇ ಸ್ವೀಕರಿಸು, ಆದರೆ ಅತಿಯಾದ ಹಾರಾಟ ಬೇಡ. ಬದುಕಿನಲ್ಲಿ ಎಲ್ಲವೂ ಬರುತ್ತದೆ ಹೋಗುತ್ತದೆ, ಯಾವುದೂ ಶಾಶ್ವತವಲ್ಲ ಎನ್ನುವ ಮನೋವೃತ್ತಿ ಬೆಳೆಸಿಕೊಳ್ಳಬೇಕು. ಯಾವುದೋ ಒಂದನ್ನು ಅತಿಯಾಗಿ ಹಚ್ಚಿಕೊಂಡರೆ ಒಂದು ವೇಳೆ ಅದು ನಮ್ಮಿಂದ ದೂರವಾದರೆ ತಡೆದುಕೊಳ್ಳಲಾಗುವುದಿಲ್ಲ. ಇದರಿಂದ ನಾವು ಮಾನಸಿಕವಾಗಿ ವ್ಯಾಕುಲತೆಗೊಳಗಾಗುತ್ತೇವೆ. ಅದರಿಂದ ಚಿಕ್ಕ ಚಿಕ್ಕ ವಿಷಯಕ್ಕೆ ಆತ್ಮಹತ್ಯೆಯಂತಹ ಘೋರ ಪಾಪವನ್ನು ಮಾಡಲು ನಮ್ಮ ಮನಸ್ಸು ಮುಂದಾಗುತ್ತದೆ. ಆದ್ದರಿಂದ ಬದುಕಿನ ಯಶಸ್ವೀ ಸೂತ್ರ ಎಂದರೆ ಯಾವುದಕ್ಕೂ ತಲೆಕೆಡಿಸಿಕೊಳ್ಳದೇ ಬಂದದ್ದನ್ನು ಬಂದಂತೆ

ಅನುಭವಿಸುವುದು. ನಾವು ಬಯಸಿದಂತೆ ಪ್ರಪಂಚವಿಲ್ಲ-ಪ್ರಪಂಚವಿದ್ದಂತೆ ನಾವು. ಅದನ್ನು ಸ್ವಾಗತಿಸಿ ಯಾವ ಉದ್ವೇಗವೂ ಇಲ್ಲದೆ ಬದುಕುವುದನ್ನು ಕಲಿತಾಗ ಮನಸ್ಸು ಗಟ್ಟಿಯಾಗುತ್ತದೆ.

ಆಧ್ಯಾತ್ಮಿಕವಾಗಿ ನೋಡಿದಾಗ ನಮಗೆ ಪ್ರಿಯವಾದದ್ದು-ಅಪ್ರಿಯವಾದದ್ದು ಎಂದು ನಾವು ಯಾವುದಕ್ಕೆ ಹೇಳುತ್ತೇವೋ, ಅದು ನಿಜವಾಗಿಯೂ ಒಳ್ಳೆಯದು/ಕೆಟ್ಟದ್ದು ಎಂದು ಹೇಳಲು ಬರುವುದಿಲ್ಲ. ಇಷ್ಟವಾದದ್ದು ಒಳ್ಳೆಯದಾಗಿರಬೇಕಾಗಿಲ್ಲ. ಕೆಲವೊಮ್ಮೆ ನಮಗೆ ಅಪ್ರಿಯವಾದದ್ದು ನಮಗೆ ಹಿತವನ್ನು ಕೊಡುತ್ತದೆ. ಆದರೆ ಅದು ನಮಗೆ ತಿಳಿಯುವುದು ಮಾತ್ರ ತಡವಾಗಿ. ನಮ್ಮ ಜೀವನದಲ್ಲಿ ಬರುವ ಪ್ರತಿಯೊಂದು ಘಟನೆ ನಮ್ಮ ಮುಂದಿನ ಬೆಳವಣಿಗೆಗೆ ಪೂರಕವಾಗಿರುತ್ತದೆ. ಒಬ್ಬ ಮನುಷ್ಯ ಅಧಃಪಾತ ಹೊಂದುವ ಪ್ರಾರಾಬ್ಧಕರ್ಮ ಹೊಂದಿದ್ದರೆ ಆತನಿಗೆ ಬೇಕಾದಷ್ಟು ಸುಖ ಬರಬಹುದು! ಅವನು ಆ ಸುಖದಲ್ಲಿ ಮೈಮರೆತು ಮಾಡಬಾರದ್ದನ್ನು ಮಾಡಿ ಅಧಃಪಾತ ಹೊಂದಬಹುದು; ಕಷ್ಟದಲ್ಲಿ ಜೀವ ಪಕ್ವವಾಗಬಹುದು. ಕಠೋಪನಿಷತ್ತಿನಲ್ಲಿ ಈ ವಿಚಾರವನ್ನು ವ್ಯಂಗ್ಯವಾಗಿ ಹೀಗೆ ಹೇಳಿದ್ದಾರೆ: "ಪ್ರೇಯೋ ಮಂದೋ ಯೋಗಕ್ಷೇಮಾದ್ವೃಣೀತೇ" (೧-೨-೨). "ಹಿತವಾದದ್ದು ಮತ್ತು ಇಷ್ಟವಾದದ್ದು ಎರಡೂ ಮುಂದೆ ಬಂದಾಗ ಯಾರು ಇಷ್ಟವಾದದ್ದನ್ನು ಆಯ್ಕೆ ಮಾಡುತ್ತಾರೆ-ಅವರು ತಿಳಿಗೇಡಿಗಳು" ಎಂದು.

ನಮಗೆ ಇಷ್ಟವಾದದ್ದು ಹಿತವಾಗಿರಬೇಕೆಂದಿಲ್ಲ, ಅದಕ್ಕಾಗಿ ಹಾರಾಡುವುದು ಅರ್ಥಶೂನ್ಯ. ಅದೇ ರೀತಿ ಜೀವನದಲ್ಲಿ ಯಾವುದೋ ಒಂದು ಅನಿಷ್ಠ ಘಟನೆ ನೆಡೆದಾಗ ಅದಕ್ಕಾಗಿ ಎಂದೂ ಗೊಂದಲಕ್ಕೊಳಗಾಗಬೇಕಿಲ್ಲ. ಅದರಿಂದಲೇ ಮುಂದೆ ನಮಗೆ ಹಿತವಾಗಬಹುದು. ಈ ವಿಚಾರ ಹೆಚ್ಚಿನವರಿಗೆ ಅನುಭವಕ್ಕೆ ಬಂದಿರುತ್ತದೆ. 'ಹೀಗೇಕೆ ? ಹೀಗಾಗಬಾರದಿತ್ತು' ಎಂದು ಯೋಚಿಸುತ್ತಿರುತ್ತೇವೆ ಆದರೆ ಮುಂದೆ ಹಾಗೆ ಆದುದರಿಂದಲೇ ನಮ್ಮ ಸಮಸ್ಯೆಗೊಂದು ದಾರಿ ಕಾಣುತ್ತದೆ. ಆದರೆ ಅದು ತಿಳಿಯುವುದು ಮಾತ್ರ ತಡವಾಗಿ. ಈ ಎಲ್ಲಾ ಕಾರಣದಿಂದ ಸುಖಬಂದಾಗ ಸುಖದ ಭ್ರಮೆ ಬೇಡ, ದುಃಖ ಬಂದಾಗ ವ್ಯಾಕುಲತೆ ಬೇಡ. ಎರಡರ ಬಗ್ಗೆಯೂ ಸಮದೃಷ್ಟಿ ಇರಲಿ. ಭಗವಂತ ಕೊಟ್ಟದ್ದನ್ನು ಪ್ರಾಮಾಣಿಕವಾಗಿ ಅನುಭವಿಸುತ್ತೇನೆ ಎನ್ನುವ ಅನುಸಂಧಾನವಿರಲಿ. ಮಾನಸಿಕ ಗೊಂದಲ ಬೇಡ. ಬದುಕಿನಲ್ಲಿ ಯಾವುದು ಹಿತ-ಯಾವುದು ಅಹಿತ ಎನ್ನುವುದು ಭಗವಂತನಿಗೆ ಗೊತ್ತಿದೆ ಎನ್ನುವ ಎಚ್ಚರ ಉಳ್ಳವನು ತನ್ನ ಮನಸ್ಸನ್ನು ಸುಖ-ದುಃಖದಲ್ಲಿ ನೆಟ್ಟಿರುವುದಿಲ್ಲ. ಬದಲಾಗಿ ಅವನ ಮನಸ್ಸು ಭಗವಂತನಲ್ಲಿ ನೆಟ್ಟಿರುತ್ತದೆ. ಭಗವಂತ ನಮ್ಮನ್ನು ತಾಯಿ ಮಗುವನ್ನು ನೋಡಿಕೊಂಡಂತೆ ನೋಡಿಕೊಳ್ಳುತ್ತಾನೆ. ತಾಯಿಯಿಂದ ಬರುವ ಎಲ್ಲಾ ವಿಚಾರ ಮಗುವಿಗೆ ಇಷ್ಟವಾಗುವುದಿಲ್ಲ. ಆದರೆ ತಾಯಿ ಮಗುವಿನ ಉದ್ಧಾರಕ್ಕೋಸ್ಕರ ಮಗುವಿನಲ್ಲಿ ಆ ಕೆಲಸವನ್ನು ಮಾಡಿಸುತ್ತಾಳೆ. ಅಲ್ಲಿ ಇಷ್ಟ ಮುಖ್ಯವಲ್ಲ, ಯಾವುದು ಹಿತ ಅದು ಮುಖ್ಯ.

ಬಾಹ್ಯಸ್ಪರ್ಶೇಷ್ವಸಕ್ತಾತ್ಮಾ ವಿಂದತ್ಯಾತ್ಮನಿ ಯತ್ ಸುಖಮ್ ।
ಸ ಬ್ರಹ್ಮಯೋಗಯುಕ್ತಾತ್ಮಾ ಸುಖಮಕ್ಷಯಮಶ್ನುತೇ ॥೨೧॥

ಬಾಹ್ಯಸ್ಪರ್ಶೇಷು ಅಸಕ್ತ ಆತ್ಮಾ ವಿಂದತಿ ಆತ್ಮನಿ ಯತ್ ಸುಖಮ್ ।

ಸಃ ಬ್ರಹ್ಮಯೋಗ ಯುಕ್ತ ಆತ್ಮಾ ಸುಖಮ್ ಅಕ್ಷಯಮ್ ಅಶ್ನುತೇ- ಹೊರಗಣ ಭೋಗಗಳಲ್ಲಿ ನಂಟು ಇರದವನು ಬಗೆಯೊಳಗೆ [ಭಗವಂತನನ್ನು ನೆನೆದಾಗೊಮ್ಮೆ] ಎಂತಹ ಸುಖವನ್ನು ಪಡೆಯುತ್ತಾನೋ ಅದೇ ಸುಖವನ್ನು ಸದಾ ಭಗವಂತನಲ್ಲಿ ಬಗೆನೆಟ್ಟ ಸಾಧಕ ನಿರಂತರ ಸವಿಯುತ್ತಾನೆ.

ಪ್ರಪಂಚದಲ್ಲಿ ಸುಖಕ್ಕೆ ಇರುವ ಸಾಧನ ಐದು. ರೂಪ, ರಸ, ಗಂಧ, ಸ್ಪರ್ಶ, ಶಬ್ದ. ಇದರ ಮುಖೇನ ಅನುಭವಿಸುವುದು ತಪ್ಪಲ್ಲ. ಬೇಕು ಅನ್ನುವ ವಸ್ತುವನ್ನು ಪಡೆಯುವುದರಲ್ಲಿ ಆನಂದವಿದೆ, ಆದರೆ ಅದಕ್ಕಿಂತ ಮುಖ್ಯವಾಗಿ ಅದನ್ನು ತೊರೆಯುವುದರಲ್ಲಿ ಹೆಚ್ಚಿನ ಆನಂದವಿದೆ. ಇದು ತಿಳಿದಾಗ ಬದುಕಿನ ಒಂದು ಮುಖ್ಯ ಸೂತ್ರ ತಿಳಿದಂತೆ. ನಾವು ಬದುಕುವ ರೀತಿ ಎಂದರೆ 'ನಾಳಿನ ಸುಖಕ್ಕಾಗಿ ಇಂದು ಕಷ್ಟಪಡುವುದು'. ಅಂದರೆ ಆ ನಾಳೆ ಎಂದೂ ಬರುವುದಿಲ್ಲ. ಸಾಯುವ ತನಕ ನಾಳೆಗಾಗಿ ಕಷ್ಟಪಡುವುದು ನಮ್ಮ ಜೀವನವಾಗಬಾರದು. ಭಗವಂತನನ್ನು ಪಡೆಯುವುದರಲ್ಲಿ ಮಹದಾನಂದವಿದೆ, ಹಾಗೂ ಅದು ನಮ್ಮನ್ನು ಸದಾ ಸುಖವಾಗಿಡುತ್ತದೆ ಎನ್ನುವ ಸತ್ಯವನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ಒಮ್ಮೆ ನಾವು ನಮ್ಮ ಅಂತರಂಗದ ಆತ್ಮಸ್ವರೂಪದ ಸುಖವನ್ನು ಅನುಭವಿಸಲು ಪ್ರಾರಂಭಿಸಿದರೆ, ಬಾಹ್ಯ ಸುಖದಲ್ಲಿ ಏನೂ ಇಲ್ಲ ಎನ್ನುವ ವಿಚಾರ ತಿಳಿಯುತ್ತದೆ. ನಮ್ಮೊಳಗೇ ಆನಂದ ಅಡಗಿದೆ, ಅದು ಬಾಹ್ಯ ಸುಖದ ತ್ಯಾಗದಿಂದ ಕಾಣಬಹುದಾದ ಆನಂದ.

ನಮಗೆ ನಮ್ಮ ಒಳಗಿರುವ ಆನಂದ ಕೆಲವೊಮ್ಮೆ ಅನುಭವಕ್ಕೆ ಬರುತ್ತದೆ. ಒಮ್ಮೊಮ್ಮೆ 'ಅದೇಕೋ ಗೊತ್ತಿಲ್ಲ ಆದರೆ ಬಹಳ ಖುಷಿ' ಎನ್ನುವ ಅನುಭವ ಪ್ರತಿಯೊಬ್ಬರೂ ಅನುಭವಿಸಿರುತ್ತಾರೆ. ಇದು ನಮ್ಮ ಅಂತರಂಗದ ಆನಂದ ಉಕ್ಕಿ ಬರುವುದು. ಈ ಆನಂದವನ್ನು ಗುರುತಿಸಿ ಅದನ್ನು ಅನುಭವಿಸಲು ಕಲಿತಾಗ ಬಾಹ್ಯ ಸುಖ ಕನಿಷ್ಠವಾಗಿ ಕಾಣಿಸುತ್ತದೆ. ಹೇಗೆ ನಿದ್ದೆಯಲ್ಲಿ ನಾವು ಬಾಹ್ಯ ಸುಖದ ಸ್ಪರ್ಶವಿಲ್ಲದೇ ನಮಗರಿವಿಲ್ಲದಂತೆ ಆನಂದದಲ್ಲಿರುತ್ತೇವೋ ಹಾಗೇ ಎಚ್ಚರದಲ್ಲಿ ಅಂತರಂಗದ ಆನಂದವನ್ನು ಅನುಭವಿಸಲು ಕಲಿತುಕೊಳ್ಳಬೇಕು. ಇದರಿಂದ ಬಾಹ್ಯ ಸುಖದ ಪ್ರಜ್ಞೆ ದೂರವಾಗುತ್ತದೆ.

ಉಪನಿಷತ್ತಿನಲ್ಲಿ ಹೇಳುವಂತೆ "ಬಾಹ್ಯ ಸುಖವನ್ನು ತ್ಯಾಗ ಮಾಡುವುದರಿಂದ, ಒಳಗಿನ ಆನಂದದ ಅರಿವು ಮೂಡುತ್ತದೆ ಹಾಗೂ ಇದರಲ್ಲಿ ಅಮೃತತ್ವವಿದೆ". ನಾವು 'ಬೇಡ' ಎನ್ನುವುದರಲ್ಲಿ ಇರುವ ಆನಂದ 'ಬೇಕು' ಅನ್ನುವುದರಲ್ಲಿಲ್ಲ. ಬೇಕು ಎನ್ನುವುದು ಸದಾ ನಮಗೆ 'ಬೇಡಿ(ಸಂಕೋಲೆ)'. ಬೇಕು ಅನ್ನುವುದು ನಮ್ಮ ಮುಂದೆ ಸಮಸ್ಯೆಗಳ ಸರಮಾಲೆಯನ್ನು ತಂದು ನಿಲ್ಲಿಸುತ್ತದೆ. "ಎಲ್ಲಾ ಬಾಹ್ಯ ಬಯಕೆಗಳನ್ನು ಕಳೆದುಕೊಳ್ಳುವುದರಲ್ಲೇ ಮನುಷ್ಯನ ಆನಂದದ ಸೆಲೆ ಅಡಗಿದೆ" ಎನ್ನುತ್ತಾನೆ ಕೃಷ್ಣ. ಬೇಕುಗಳು ಕಮ್ಮಿ ಆದಂತೆ ಮನುಷ್ಯ ಆನಂದದಿಂದ ಬದುಕುತ್ತಾನೆ.

ಕೇವಲ ಬಾಹ್ಯ ಸುಖವನ್ನು ಬಿಡುವುದಷ್ಟೇ ಅಲ್ಲ, ಅದರ ಜೊತೆಗೆ ಒಳಗಿನ ಆನಂದವನ್ನು ಹಿಡಿಯಬೇಕು. ಅದು ಅನಂತವಾದ ಆನಂದ. ಕೃಷ್ಣ ಹೇಳುತ್ತಾನೆ: "ಬ್ರಹ್ಮಯೋಗಯುಕ್ತಾತ್ಮಾ ಸುಖಮಕ್ಷಯಮಶ್ನುತೇ" ಎಂದು. ಭಗವಂತನ ಧ್ಯಾನದಲ್ಲಿ ಒಳಗಿನಿಂದ ಆನಂದದ ಅನುಭವವಾಗುತ್ತದೆ- ಅದನ್ನು ಒಬ್ಬ ಸಾಧಕ ಪಡೆಯುತ್ತಾನೆ. ಅಂತರಂಗದಲ್ಲಿ ಭಗವದ್ ಸ್ಪರ್ಶವಾಗಿ ಅದರಿಂದ ಅನಂತ ಸುಖವನ್ನು ಸಾಧಕ ನಿರಂತರ ಸವಿಯುತ್ತಾನೆ.

ಸುಖ ಎನ್ನುವುದು ನಮ್ಮೊಳಗೇ ಇದೆ. ಇದೊಂದು ಮಾನಸಿಕ ಸ್ಥಿತಿ. ನಾವು ನಮ್ಮೊಳಗಿನ ಸುಖವನ್ನು ಗುರುತಿಸದೆ ಬಾಹ್ಯ ಸುಖದ ಬೆನ್ನು ಹತ್ತಿ ಕಷ್ಟ ಪಡುತ್ತೇವೆ. ಜಾನಪದ ಕಥೆಯೊಂದು ಹೀಗೆ ಹೇಳುತ್ತದೆ. ಒಬ್ಬ ಮುದುಕಿ ತನ್ನ

ಮನೆಯಲ್ಲಿ ರಾತ್ರಿ ಹೊತ್ತು ಸ್ವಲ್ಪ ಹಣವನ್ನು ಕೆಳಗೆ ಬೀಳಿಸಿಕೊಳ್ಳುತ್ತಾಳೆ. ಆದರೆ ಆಕೆಯ ಮನೆಯಲ್ಲಿ ದೀಪ ಹಚ್ಚಲು ಎಣ್ಣೆ ಇರುವುದಿಲ್ಲ. ಬೀದಿಯಲ್ಲಿ ಬೀದಿದೀಪದ ಬೆಳಕನ್ನು ಕಂಡ ಮುದುಕಿ ಬೀದಿಯಲ್ಲಿ ಬಂದು ತಾನು ಮನೆಯಲ್ಲಿ ಬೀಳಿಸಿಕೊಂಡ ಹಣವನ್ನು ಹುಡುಕುತ್ತಿರುತ್ತಾಳೆ. ಏಕೆ ಹೀಗೆ ಎಂದು ಕೇಳಿದಾಗ "ಮನೆಯಲ್ಲಿ ಬೆಳಕಿಲ್ಲ ಆದರೆ ಇಲ್ಲಿ  ಬೆಳಕಿದೆ ಅದಕ್ಕಾಗಿ ಇಲ್ಲಿ ಹುಡುಕುತ್ತಿದ್ದೇನೆ" ಎನ್ನುವುದು ಆ ಮುದುಕಿಯ ಉತ್ತರ! ನಾವೆಲ್ಲರೂ ಹೀಗೇ. ನಿಜವಾದ ಆನಂದ ಇರುವುದು ಅಂತರಂಗದಲ್ಲಿ, ಆದರೆ ನಾವು ಸುಖವನ್ನು ಅರಸುವುದು ಹೊರಪ್ರಪಂಚದಲ್ಲಿ!

ಯೇ ಹಿ ಸಂಸ್ಪರ್ಶಜಾ ಭೋಗಾ ದುಃಖಯೋನಯ ಏವ ತೇ ।
ಆದ್ಯಂತವಂತಃ ಕೌಂತೇಯ ನ ತೇಷು ರಮತೇ ಬುಧಃ ॥೨೨॥

ಯೇ ಹಿ ಸಂಸ್ಪರ್ಶ ಜಾಃ ಭೋಗಾಃ ದುಃಖ ಯೋನಯಃ ಏವ ತೇ ।
ಆದಿ ಅಂತ ವಂತಃ  ಕೌಂತೇಯ ನ ತೇಷು ರಮತೇ ಬುಧಃ -ವಿಷಯದ ನಂಟಿನಿಂದ ಬರುವ ಸುಖಗಳು ಬನ್ನದ ತವರು. ಬಂತು ಎನ್ನುವಷ್ಟರಲ್ಲೇ ಬರಿದಾಗುವಂಥವು. ಕೌಂತೇಯಾ, ಬಲ್ಲವರು ಅವನ್ನು  ಮೆಚ್ಚುವುದಿಲ್ಲ.

ಬಾಹ್ಯ ವಿಷಯಸ್ಪರ್ಶದಿಂದ ಸಿಗುವ ಸುಖಭೋಗದ ಅನುಭವ(ಸಂಸ್ಪರ್ಶ)ದಿಂದ ನಮಗೆಷ್ಟು ಸುಖ ಸಿಕ್ಕೀತು? ಒಂದು ಗುಲಗಂಜಿಯಷ್ಟು ಸುಖಕ್ಕಾಗಿ ಕುಂಬಳಕಾಯಿಯಷ್ಟು ದುಃಖವನ್ನು ಅನುಭವಿಸಲು ನಾವು ಸಿದ್ಧರಾಗಿರುತ್ತೇವೆ. ಇಂದಿನ ಎಲ್ಲಾ ಪ್ರಾಪಂಚಿಕ ಅಪರಾಧಗಳಿಗೆ ಇದೇ ಕಾರಣ. ಕ್ಷಣಿಕ ಸುಖದ ಆಸೆಗೆ ಬಿದ್ದು ಇಡೀ ಜೀವನವನ್ನೇ ಹಾಳು ಮಾಡಿಕೊಳ್ಳುವವರನ್ನು ನಮ್ಮ ದೈನಂದಿನ ಜೀವನದಲ್ಲಿ ನಾವು ಕಾಣುತ್ತೇವೆ. ನಮಗೆ ಬಾಹ್ಯವಾಗಿ ಸುಖ ಎಂದು ಕಾಣುವುದು ದುಃಖವನ್ನು ಮರಿ ಹಾಕುವ ಮೊಟ್ಟೆ ಎನ್ನುವ ಸತ್ಯವನ್ನರಿಯದೇ, ಅದೇ ಸುಖ ಎಂದು ಅದರ ಬೆನ್ನು ಹಿಡಿಯುತ್ತೇವೆ. ಪ್ರತಿಯೊಂದು ಬಾಹ್ಯಸುಖದ ಹಿಂದೆ ದುಃಖವೆಂಬ ಕಗ್ಗತ್ತಲು ಮಡುಗಟ್ಟಿರುತ್ತದೆ. ಬಾಹ್ಯ ಸುಖ-ಆನಂದ ಎನ್ನುವುದು ಕೇವಲ ಒಂದು ಮಿಂಚು. ಅದು ಬಂತು ಎನ್ನುವಷ್ಟರಲ್ಲಿ ಬರಿದಾಗುತ್ತದೆ. ತಿಳುವಳಿಕೆ ಉಳ್ಳವರು ಈ ಬಾಹ್ಯ ಸುಖದ ಆಸೆಯಲ್ಲಿ ಬದುಕುವುದಿಲ್ಲ.

ಅಧ್ಯಾತ್ಮದ ಬಗ್ಗೆ  ಕೆಲವರು ಹೇಳುವುದಿದೆ:  "ಈಗಲೇ ನಮಗೇಕೆ ಅಧ್ಯಾತ್ಮ; ಅದೆಲ್ಲಾ ಅರವತ್ತರ ಶಾಂತಿ ಆದ ಮೇಲೆ" ಎಂದು. ಇದು ಏಕೆ ಸರಿಯಲ್ಲ  ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ  ವಿವರಿಸುತ್ತಾನೆ.

ಶಕ್ನೋತೀಹೈವ ಯಃ ಸೋಢುಂ ಪ್ರಾಕ್ ಶರೀರವಿಮೋಕ್ಷಣಾತ್ ।
ಕಾಮಕ್ರೋಧೋದ್ಭವಂ ವೇಗಂ ಸ ಯುಕ್ತಃ ಸ ಸುಖೀ ನರಃ ॥೨೩॥

ಶಕ್ನೋತಿ ಇಹ ಏವ ಯಃ ಸೋಢುಮ್  ಪ್ರಾಕ್ ಶರೀರ ವಿಮೋಕ್ಷಣಾತ್

ಕಾಮ ಕ್ರೋಧ ಉದ್ಭವಮ್ ವೇಗಮ್ ಸಃ ಯುಕ್ತಃ ಸಃ ಸುಖೀ ನರಃ –ಒಲುಮೆ-ಸಿಡುಕುಗಳ ಸೆಳೆತವನ್ನು ಇಲ್ಲೇ, ಈ ನರದೇಹ ಕಳಚುವ ಮುನ್ನವೇ ಯಾರು ತಾಳಬಲ್ಲನೋ ಅಂತಹ ಮಾನವನೇ ನಿಜವಾದ ಯೋಗಿ; ನಿಜವಾದ ಸುಖಿ.

ನಾವು ನಮ್ಮ ಪ್ರಾಪಂಚಿಕ ಸುಖ-ಸ್ಪರ್ಶದ ಮೋಹವನ್ನು ಗೆಲ್ಲಲು ಸಾಧ್ಯವಾಗುವುದು ಈ ದೇಹ ಇರುವಾಗಲೇ. ವಿಷಯಗಳ ಸ್ಪರ್ಶ ಇರುವುದು ದೇಹಕ್ಕೆ ಹಾಗೂ ವಿಷಯಗಳನ್ನು ಗೆಲ್ಲಲು ಸಾಧ್ಯವಾಗುವುದು ಈ ದೇಹವಿರುವಾಗಲೇ. ಭಗವಂತ ನಮಗೆ ಯಾವುದು ಸರಿ, ಯಾವುದು ತಪ್ಪು ಎನ್ನುವ ವಿಚಾರ ಮಾಡುವ ಬುದ್ಧಿಶಕ್ತಿಯನ್ನು ಕೊಟ್ಟಿದ್ದಾನೆ. ಇಂತಹ ವಿಚಾರ ಶಕ್ತಿಯನ್ನು ಬಳಸಿಕೊಂಡು ಶರೀರ ಬಿದ್ದುಹೋಗುವ ಮೊದಲೇ ಇಂದ್ರಿಯ ನಿಗ್ರಹವನ್ನು ಅಭ್ಯಾಸ ಮಾಡಬೇಕು. ಇದು ಮುಂದಕ್ಕೆ ಹಾಕುವ ಮತ್ತು ಒಂದು ದಿನದಲ್ಲಿ ಸಾಧಿಸುವ ವಿಷಯವಲ್ಲ. ಇದಕ್ಕೆ ನಿರಂತರ ಸಾಧನೆ ಅಗತ್ಯ. ಈ ದೇಹ ಗಟ್ಟಿಯಾಗಿರುವಾಗಲೇ ಈ ಸಾಧನೆ ಮಾಡಬೇಕು.
ಮನುಷ್ಯನನ್ನು ಕಾಡುವ ಮೂಲಭೂತ ಸಮಸ್ಯೆ ಕಾಮ ಮತ್ತು ಕ್ರೋಧ. ಈ ಕಾಮ ಕ್ರೋಧದ ವೇಗ ನಮ್ಮೆಲ್ಲಾ ವಿವೇಕವನ್ನು ತಳ್ಳಿ ಮುಂದೆ ಬಂದು ನಿಲ್ಲುವಷ್ಟು ಬಲಿಷ್ಠ. ಅದು ಮಳೆಗಾಲದ ಹುಚ್ಚು ಹೊನಲಂತೆ ನಿನ್ನ ವಿಚಾರಧಾರೆಯನ್ನು ಕೊಚ್ಚಿಕೊಂಡು ಹೋಗುವ ಮೊದಲು ಅದನ್ನು ತಡೆ. ಯಾರು ಇದನ್ನು ತಡೆಯಬಲ್ಲರೋ ಅವರು "ಸ ಯುಕ್ತಃ ಸ ಸುಖೀ ನರಃ" ಎನ್ನುತ್ತಾನೆ ಕೃಷ್ಣ. ಯಾರು ಕಾಮ-ಕ್ರೋಧದ ಬೆನ್ನುಹತ್ತದೇ, ಬಾಹ್ಯ ಸ್ಪರ್ಶವನ್ನು ತಡೆದು ಅಂತರಂಗದ ಅನುಭವಕ್ಕೆ ತನ್ನನ್ನು ತಾನು ಒಡ್ಡಿಕೊಳ್ಳುತ್ತಾನೋ ಅವನು ನಿಜವಾದ ಸುಖಿ.

ನಮ್ಮ ಅಂತರಂಗದ ಅನುಭವ ಎಂತಾದ್ದು? ಒಬ್ಬ ಸಾಧಕ ತನ್ನ ಅಂತರಂಗದಲ್ಲಿ ಕಾಣತಕ್ಕಂತಹ ಆನಂದದ ಅನುಭವವೇನು ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸಿದ್ದಾನೆ.

ಯೋಽನ್ತಃ ಸುಖೋಽನ್ತರಾರಾಮಸ್ತಥಾಽನ್ತರ್ಜ್ಯೋತಿರೇವ ಯಃ ।
ಸ ಯೋಗೀ ಬ್ರಹ್ಮ ನಿರ್ಬಾಣಂ ಬ್ರಹ್ಮಭೂತೋಽಧಿಗಚ್ಛತಿ ॥೨೪॥

ಯಃ ಅಂತಃ ಸುಖಃ ಅಂತಃ ಆರಾಮಃ ತಥಾ ಅಂತಃ ಜ್ಯೋತಿಃ ಏವ ಯಃ ।
ಸಃ ಯೋಗೀ ಬ್ರಹ್ಮ ನಿರ್ಬಾಣಂ ಬ್ರಹ್ಮಭೂತಃ ಅಧಿಗಚ್ಛತಿ-ಬಯಕೆಯಳಿದು ಒಳಬಗೆಯ ಸುಖ ಕಂಡವನು, ಭಗವಂತನನ್ನು ಕಂಡು ಒಳಗೊಳಗೇ ಖುಷಿಗೊಂಡವನು, ಭಗವಂತನ ಬೆಳಕನ್ನೇ ಒಳಗೆಲ್ಲಾ ತುಂಬಿಕೊಂಡವನು, ಭಗವಂತನಲ್ಲೇ ನೆಲೆ ನಿಂತ ಇಂತಹ ಸಾಧಕ, ಅಳಿವಿರದ ಮೈ ತಳೆದ ಭಗವಂತನನ್ನೇ ಸೇರುತ್ತಾನೆ.

ಮನುಷ್ಯ ಸುಖ ಬೇಕು ಎಂದು ಬಯಸದೇ ಅಂತಃಸುಖ ಬೇಕು ಎಂದು ಬಯಸಬೇಕು. ಈ ಶ್ಲೋಕದಲ್ಲಿ 'ಸುಖ' ಮತ್ತು 'ಆರಾಮ' ಎನ್ನುವ ಎರಡು ಶಬ್ದಗಳು ಬಳಕೆಯಾಗಿವೆ. ಈ ಎರಡು ಶಬ್ದಗಳ ನಡುವೆ ಸೂಕ್ಷ್ಮ ವ್ಯತ್ಯಾಸವಿದೆ. ನಮ್ಮ ಬಯಕೆಗಳು ಈಡೇರುವುದು ಅಥವಾ ಬಯಸಿದ್ದು ಸಿಕ್ಕಿದಾಗ ಆಗುವುದು 'ಆರಾಮ' ; ಬಯಕೆಗಳೇ

ಇಲ್ಲದಿರುವುದು ಸುಖ. ಯಾವುದೋ ಕೊರತೆ, ತೊಂದರೆ, ಕಷ್ಟ ಪರಿಹಾರವಾದಾಗ, ಯಾವುದೋ ತಾಪತ್ರಯದಿಂದ ಪಾರಾದಾಗ ಆಗುವುದು ಸುಖ. ಇಲ್ಲಿ ಕೃಷ್ಣ ಹೇಳುತ್ತಾನೆ: "ಅಧ್ಯಾತ್ಮ ಯೋಗದ ಸಾಧಕ, ಸಾಧನೆ ಮಾಡಿ ಫಲ ಪಡೆದವನು, ಮಾನಸಿಕವಾಗಿ ಭಗವಂತನಲ್ಲೇ ನೆಲೆಸಿರುತ್ತಾನೆ. ಆತ ಒಳಗಿಂದೊಳಗೆ ಆರಾಮವಾಗಿರುತ್ತಾನೆ" ಎಂದು. ಸಾಧಕ ಅಂತರಂಗದಲ್ಲಿ ಭಗವಂತನನ್ನು ನೋಡುತ್ತಾ-ಆರಾಮವಾಗಿರುತ್ತಾನೆ; ಕಾಮ ಕ್ರೋಧವನ್ನು ಬಿಟ್ಟು-ಸುಖಪಡುತ್ತಾನೆ; ತನ್ನೊಳಗಿರುವ ಆ ಜ್ಯೋತಿಯನ್ನು ಅರಿತು ತನ್ನೊಳಗಿರುವ ಆ ಮಹಾ ಬೆಳಕಾದ ಭಗವಂತನನ್ನು ಕಂಡು ಭಗವಂತನಲ್ಲೇ ನೆಲೆಸಿಬಿಡುತ್ತಾನೆ.

ಲಭಂತೇ ಬ್ರಹ್ಮನಿರ್ಬಾಣಮೃಷಯಃ ಕ್ಷೀಣಕಲ್ಮಷಾಃ ।
ಛಿನ್ನದ್ವೈಧಾಯತಾತ್ಮಾನಃ ಸರ್ವಭೂತಹಿತೇ ರತಾಃ ॥೨೫॥

ಲಭಂತೇ ಬ್ರಹ್ಮನಿರ್ಬಾಣಮ್ ಋಷಯಃ ಕ್ಷೀಣ ಕಲ್ಮಷಾಃ ।
ಛಿನ್ನ ದ್ವೈಧಾಃ ಯತಆತ್ಮಾನಃ ಸರ್ವಭೂತಹಿತೇ ರತಾಃ -ಕೊಳೆಗಳನ್ನೆಲ್ಲ ಕಳೆದು, ಇಬ್ಬಂದಿತನವಳಿದು, ತಿಳಿವಿನ ಕೊಳವಾದವರು.[ಬಗೆಯನ್ನು ಹದಗೊಳಿಸಿದವರು], ಎಲ್ಲಾ ಜೀವಿಗಳಿಗೂ ಒಳಿತನ್ನೇ ಬಯಸುವ ಬಲ್ಲವರು ನಿತ್ಯ ಸ್ವರೂಪನಾದ ಭಗವಂತನನ್ನೇ ಪಡೆಯುತ್ತಾರೆ.

ತನ್ನೊಳಗೆ ಉದ್ಭವವಾಗುವ ಸಂದೇಹವನ್ನು, ದ್ವಂದ್ವವನ್ನು ಮೀರಿ ನಿಂತವರು ನಿಜವಾದ ಸಾಧಕರು. ಇವರು ಸದಾ ತಮ್ಮ ಮನಸ್ಸನ್ನು ಅಂತರಂಗದಲ್ಲಿ ನೆಲೆಗೊಳಿಸಿರುತ್ತಾರೆ. ಇವರು ಬಯಸುವ ಸುಖ 'ಅಂತರಂಗದ ಸುಖ'. ಬಾಹ್ಯ ಸುಖದ ಬೆನ್ನುಹತ್ತದೇ, ಎಲ್ಲಾ ಜೀವಿಗಳಿಗೆ ಒಳಿತನ್ನೇ ಬಯಸುವ ಇವರು ಸದಾ ನಿತ್ಯ ಸ್ವರೂಪನಾದ ಭಗವಂತನಲ್ಲೇ ನೆಲೆಸಿ ಅವನನ್ನೇ ಸೇರುತ್ತಾರೆ.

ಕಾಮಕ್ರೋಧವಿಯುಕ್ತಾನಾಂ ಯತೀನಾಂ ಯತಚೇತಸಾಮ್ ।
ಅಭಿತೋ ಬ್ರಹ್ಮನಿರ್ಬಾಣಂ ವರ್ತತೇ ವಿದಿತಾತ್ಮನಾಮ್ ॥೨೬॥

ಕಾಮ ಕ್ರೋಧ ವಿಯುಕ್ತಾನಾಮ್ ಯತೀನಾಮ್ ಯತಚೇತಸಾಮ್ ।
ಅಭಿತಃ ಬ್ರಹ್ಮನಿರ್ಬಾಣಮ್ ವರ್ತತೇ ವಿದಿತ ಆತ್ಮನಾಮ್-- ಪ್ರಯತ್ನಶೀಲರಾಗಿ ಒಲುಮೆ-ಸಿಡುಕುಗಳನ್ನು ಒದ್ದವರಿಗೆ, ಬಗೆಯನ್ನು ಗೆದ್ದವರಿಗೆ, ಭಗವಂತನನ್ನು ಬಲ್ಲವರಿಗೆ ಎಲ್ಲೆಡೆಯೂ ನಿತ್ಯ ಸ್ವರೂಪನಾದ ಭಗವಂತ ತುಂಬಿರುತ್ತಾನೆ.

ಕಾಮ-ಕ್ರೋಧವನ್ನು ಸಂಪೂರ್ಣ ತೊರೆದು, ಪೂರ್ಣವಾಗಿ ಇಂದ್ರಿಯನಿಗ್ರಹ ಸಾಧಿಸಿದವರಿಗೆ ಎಲ್ಲೆಡೆಯೂ ಎಲ್ಲಾ ಜೀವ ಜಂತುವಿನಲ್ಲೂ ಭಗವಂತ ಕಾಣಿಸುತ್ತಾನೆ. ಯಾವುದೇ ಐಹಿಕ ಕ್ಲೇಶದ ನೋವು ಇವರಿಗಿರುವುದಿಲ್ಲ. ಇವರ ಮನದಲ್ಲಿ ಸರ್ವಾಂತರ್ಯಾಮಿಯಾದ, ನಿತ್ಯ ಸ್ವರೂಪನಾದ ಭಗವಂತ ನೆಲೆನಿಂತಿರುತ್ತಾನೆ.

ಬಾಹ್ಯ ಸುಖದಿಂದ ಅಂತರಂಗದ ಸ್ವರೂಪಭೂತವಾದ ಸಹಜ ಸುಖದ ಕಡೆ ತಿರುಗುವ ಸಂದೇಶವನ್ನು ಕೊಟ್ಟ ಕೃಷ್ಣ, ಅದಕ್ಕೆ ಪೂರಕವಾದ ಧ್ಯಾನದ ಬಗ್ಗೆ ಸಂಕ್ಷಿಪ್ತವಾಗಿ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಸ್ಪರ್ಶಾನ್ ಕೃತ್ವಾ ಬಹಿರ್ಬಾಹ್ಯಾಂಶ್ಚಕ್ಷುಶ್ಚೈವಾಂತರೇ ಭ್ರುವೋಃ ।
ಪ್ರಾಣಾಪಾನೌ ಸಮೌ ಕೃತ್ವಾ ನಾಸಾಭ್ಯಂತರಚಾರಿಣೌ ॥೨೭॥

ಯತೇಂದ್ರಿಯಮನೋವೃತ್ತಿರ್ಮುನಿರ್ಮೋಕ್ಷಪರಾಯಣಃ ।
ವಿಗತೇಚ್ಛಾಭಯಕ್ರೋಧೋ ಯಃ ಸದಾ ಮುಕ್ತ ಏವ ಸಃ ॥೨೮॥

ಸ್ಪರ್ಶಾನ್ ಕೃತ್ವಾ ಬಹಿಃ ಬಾಹ್ಯಾನ್ ಚಕ್ಷುಃ ಚ ಏವ ಅಂತರೇ ಭ್ರುವೋಃ ।
ಪ್ರಾಣ ಅಪಾನೌ ಸಮೌ ಕೃತ್ವಾ ನಾಸ ಅಭ್ಯಂತರ ಚಾರಿಣೌ ॥
ಯತ ಇಂದ್ರಿಯ ಮನಃ ವೃತ್ತಿಃ ಮುನಿಃ ಮೋಕ್ಷ ಪರಾಯಣಃ ।
ವಿಗತ ಇಚ್ಛಾ ಭಯ ಕ್ರೋಧಃ ಯಃ ಸದಾ ಮುಕ್ತಃ ಏವ ಸಃ –ಹೊರಗಣ ವಿಷಯ ಸಂಬಂಧಗಳನ್ನು ಹೊರಗಟ್ಟಿ, ನೋಟವನ್ನು ಹುಬ್ಬುಗಳ ನಡುವಿರಿಸಿ, ಹೊರಳೆಯೊಳಗೆ ಚಲಿಸುವ ಪ್ರಾಣಾಪಾನಗಳನ್ನು ಕುಂಭಕದಲ್ಲಿ ಸಮಗೊಳಿಸಿ, ಇಂದ್ರಿಯಗಳ ಮತ್ತು ಮನದ ಚಲ್ಲಾಟವನ್ನು ಹಿಡಿತದಲ್ಲಿಟ್ಟವನು, ಬಿಡುಗಡೆಗಾಗಿ ಕಾತರಿಸುವವನು, ಬಯಕೆ-ಅಂಜಿಕೆ-ಸಿಡುಕುಗಳನ್ನು ತೊಡೆದುಕೊಂಡವನು. ಇಂತಹ ಸಾಧಕನು ಸದಾ ಮುಕ್ತನೇ ಸರಿ.

ನಾವು ನಮ್ಮ ಮನಸ್ಸನ್ನು ನಿಯಂತ್ರಿಸಬೇಕಾದರೆ ಮೊದಲು ನಮ್ಮ ಇಂದ್ರಿಯಗಳು ಹೊರ ಪ್ರಪಂಚದಲ್ಲಿ ಸಂಚರಿಸುವುದನ್ನು ನಿಯಂತ್ರಿಸಬೇಕು. "ಸ್ಪರ್ಶಾನ್ ಕೃತ್ವಾ ಬಹಿಃ ಬಾಹ್ಯಾನ್"- ಬಾಹ್ಯೇಂದ್ರಿಯ ನಿಯಂತ್ರಣ ಮಾಡದೇ ಮನಸ್ಸನ್ನು ನಿಯಂತ್ರಣ ಮಾಡಲು ಸಾಧ್ಯವಿಲ್ಲ. ಇದಕ್ಕಾಗಿ ಹೊರ ಪ್ರಪಂಚದ ರೂಪ-ರಸ-ಸ್ಪರ್ಶ-ಶಬ್ದ-ಗಂಧ ಎನ್ನುವ ಸುಖದ ಭ್ರಮೆಯನ್ನು ಹೊರಗೇ ಬಿಡಬೇಕು. ಜೊತೆಗೆ ಅನಪೇಕ್ಷಿತವಾಗಿ ನಮ್ಮೊಳಗೆ ತುಂಬಿರುವ, ಸತ್ಯವನ್ನು ಕಾಣುವುದಕ್ಕೆ ಅಡ್ಡಗೋಡೆಯಾಗಿರುವ, ಈ ಪ್ರಪಂಚದ ಅನುಭೂತಿಯನ್ನು ಹೊರಹಾಕಬೇಕು. ಸಾಮಾನ್ಯವಾಗಿ ನಮಗೆ ಧ್ಯಾನಕ್ಕೆ ಕುಳಿತಾಗ ಏನೇನೊ ಕಾಣಲು ಆರಂಭವಾಗುತ್ತದೆ. ಸುಂದರವಾದದ್ದು, ಭಯಾನಕವಾದದ್ದು, ಇತ್ಯಾದಿ. ಇದಕ್ಕಾಗಿ ಭಯಪಡುವ ಅಗತ್ಯವಿಲ್ಲ. ಇವೆಲ್ಲವೂ ನಾವು ನಮ್ಮೊಳಗೆ ತುಂಬಿಕೊಂಡಿರುವ ಅನಗತ್ಯ ವಿಚಾರಗಳು. ಅವು ಹೊರ ಹೋಗುವಾಗ ಈ ರೀತಿ ನಮಗೆ ದರ್ಶನ ಕೊಡುತ್ತವೆ. ಹಠಬಿಡದೆ ಸಾಧನೆ ಮುಂದುವರಿಸಿದಾಗ ಕ್ರಮೇಣವಾಗಿ ಈ ಎಲ್ಲಾ ವಿಚಾರಗಳು ಹೊರಹೋಗಿ ಮನಸ್ಸು ನಿರ್ಮಲವಾಗುತ್ತದೆ. ಇದು ಒಂದೇ ದಿನದಲ್ಲಿ ಆಗುವಂತದ್ದಲ್ಲ, ಇದಕ್ಕೆ ನಿರಂತರ ಸಾಧನೆ ಅಗತ್ಯ. ಒಮ್ಮೆ ಅಂತಃಕರಣ ಸ್ವಚ್ಛವಾದರೆ ಅದರಲ್ಲಿ ಏನನ್ನು ಬೇಕಾದರೂ ಪ್ರತಿಬಿಂಬಿಸಬಹುದು.

ಧ್ಯಾನಕ್ಕೆ ಬೇಕಾದ ಇನ್ನೊಂದು ಮುಖ್ಯವಾದ ಅಂಶ ಅನ್ನಮಯಕೋಶ(ದೇಹ) ಸ್ಥಿರಗೊಳಿಸುವುದು. ದೇಹ ಚಲಿಸಿದರೆ ಮನಸ್ಸು ಚಲಿಸುತ್ತದೆ-ಆಗ ಏಕಾಗ್ರತೆ ಸಾಧ್ಯವಿಲ್ಲ. ಅದಕ್ಕಾಗಿ ನಾವು ನೆಟ್ಟಗೆ(**erect and straight body**), ನಮಗೆ ಸಾಧ್ಯವಾದ ಆಸನ(**Posture**)ದಲ್ಲಿ ನಮ್ಮ ದೇಹವನ್ನು ಸ್ಥಿರಗೊಳಿಸಬೇಕು. ಕೃಷ್ಣ ಹೇಳುತ್ತಾನೆ: "ಚಕ್ಷುಃ ಚ ಏವ ಅಂತರೇ  ಭ್ರುವೋಃ" ಎಂದು. ಅಂದರೆ ನಮ್ಮ ದೃಷ್ಟಿಯನ್ನು ನಮ್ಮ ಎರಡು ಹುಬ್ಬಿನ ನಡುವೆ ನೆಡುವುದು.(ಇದು ಕಷ್ಟವಾದರೆ ಮೂಗಿನ ತುದಿಯನ್ನೂ ಆರಿಸಿಕೊಳ್ಳಬಹುದು ಎಂದು ಶಾಸ್ತ್ರಕಾರರು ಹೇಳುತ್ತಾರೆ). ನಮ್ಮ ಎರಡು ಹುಬ್ಬಿನ ನಡುವೆ ಆಜ್ಞಾಚಕ್ರವಿದೆ, ಅಲ್ಲಿ ನಾವು ನಮ್ಮ ದೃಷ್ಟಿಯನ್ನು ನೆಟ್ಟಾಗ ಈ ಶಕ್ತಿ ಕೇಂದ್ರ ಜಾಗೃತವಾಗುತ್ತದೆ. ಇದರಿಂದ ಅನ್ನಮಯ ಕೋಶ ಸ್ಥಿರವಾಗುತ್ತದೆ.

ಅನ್ನಮಯಕೋಶದ ನಂತರ ಪ್ರಾಣಮಯಕೋಶ. "ಪ್ರಾಣ ಅಪಾನೌ ಸಮೌ ಕೃತ್ವಾ ನಾಸ ಅಭ್ಯಂತರ ಚಾರಿಣೌ"-ನಮ್ಮೊಳಗೆ ನಿರಂತರ ವಾಯುವಿನ ಚಲನೆ ಇರುತ್ತದೆ; ಈ ಚಲನೆಯನ್ನು  ಸ್ಥಿರಗೊಳಿಸುವುದನ್ನು ಕುಂಭಕ ಎನ್ನುತ್ತಾರೆ. ಇದರಲ್ಲಿ ಎರಡು ವಿಧ. ಒಂದು ಅಂತಃಕುಂಭಕ ಹಾಗೂ ಇನ್ನೊಂದು ಬಾಹ್ಯಕುಂಭಕ. ಅಂತಃಕುಂಭಕದಲ್ಲಿ ಮೊದಲು ಸಂಪೂರ್ಣ ಒಳಗಿರುವ ಗಾಳಿಯನ್ನು ಹೊರಹಾಕಿ ನಂತರ ಎಷ್ಟು ಹೆಚ್ಚು ಸಾಧ್ಯವೋ ಅಷ್ಟು ಶುದ್ಧ ಗಾಳಿಯನ್ನು ಒಳಗೆ ತೆಗೆದುಕೊಂಡು, ಉಸಿರನ್ನು ಸ್ಥಗನಗೊಳಿಸಬೇಕು. [ಈ ರೀತಿಯ ಪ್ರಾಣಾಯಾಮವನ್ನು ಗುರುವಿನಿಂದ ಕಲಿತು ಮಾಡಬೇಕು- ಇಲ್ಲದಿದ್ದರೆ ಇದರಿಂದ ಅಪಾಯವಿದೆ]. ಬಾಹ್ಯಕುಂಭಕದಲ್ಲಿ ಒಳಗಿನ  ಗಾಳಿಯನ್ನು ಸಂಪೂರ್ಣ ಹೊರಹಾಕಿ ಅದೇ ಸ್ಥಿತಿಯಲ್ಲಿ ಉಸಿರನ್ನು ಸ್ಥಗನಗೊಳಿಸುತ್ತಾರೆ. ಸಾಮಾನ್ಯವಾಗಿ ಹೃದಯ ರೋಗವಿದ್ದವರಿಗೆ  ಅಂತಃಕುಂಭಕ ಅಪಾಯಕಾರಿ. ಅವರು ಬಾಹ್ಯಕುಂಭಕ ಮಾಡಬಹುದು. ಹೀಗೆ ಕುಂಭಕದಿಂದ ಪ್ರಾಣಮಯಕೋಶ ಸ್ಥಿರವಾಗುತ್ತದೆ. ನಂತರದ ಹೆಜ್ಜೆ ಮನೋಮಯ ಮತ್ತು ವಿಜ್ಞಾನಮಯಕೋಶ. ನಮ್ಮ ಮನಸ್ಸು ಚಂಚಲ, ಅದು ಒಂದುಕಡೆ ನಿಲ್ಲುವುದಿಲ್ಲ, ಅದನ್ನು ಸ್ಥಿರಗೊಳಿಸಬೇಕು. 'ಈ ದಾರಿಯಲ್ಲಿ ನಾನು ಸಾಗಿ-ಸಾಧಿಸಿ ಸಿದ್ಧಿ ಪಡೆದೇ ಪಡೆಯುತ್ತೇನೆ' ಎನ್ನುವ ಹಠತೊಟ್ಟು ಮನಸ್ಸನ್ನು ಅದಕ್ಕೆ ಅಣಿಗೊಳಿಸಬೇಕು. ಇದರಿಂದ ಚಿತ್ತ ಭಗವಂತನ ಕಡೆ ಏಕಾಗ್ರವಾಗುತ್ತದೆ. ಈ ಸ್ಥಿತಿ ಪಾಂಚಭೌತಿಕವಾಗಿ ನಾವು ತಲುಪಬಹುದಾದ ಅತ್ಯಂತ ಮಹತ್ತಾದ ಸ್ಥಿತಿ. ಇಲ್ಲಿರುವ ಆನಂದ ಅಪರಿಮಿತ. ಈ ಸ್ಥಿತಿಯಲ್ಲಿರುವ ಸುಖವನ್ನು ಅನುಭವಿಸಿದರೆ ಮುಂದೆ ಬಾಹ್ಯ ಪ್ರಪಂಚದಲ್ಲಿನ ಸುಖದ ಹಿಂದೆ ನಮ್ಮ ಮನಸ್ಸು ಎಂದೂ ಹರಿಯುವುದಿಲ್ಲ.ಮನಸ್ಸು ಭಗವಂತನಲ್ಲಿ ನೆಲೆನಿಲ್ಲುತ್ತದೆ. ಇದರಿಂದ ನಮ್ಮ ಆಸೆ-ಭಯ-ಕ್ರೋಧ ಎಲ್ಲವೂ ಇಲ್ಲವಾಗುತ್ತದೆ. "ಇಂತಹ ಸಾಧಕ ಸದಾ ಮುಕ್ತನೇ ಸರಿ" ಎನ್ನುತ್ತಾನೆ ಕೃಷ್ಣ.

ಅನ್ನಮಯಕೋಶ, ಪ್ರಾಣಮಯಕೋಶ, ಮನೋಮಯಕೋಶ ಮತ್ತು  ವಿಜ್ಞಾನಮಯಕೋಶವೆಂಬ ಚತುರ್ವಿದ ಅಂತಃಕರಣವನ್ನು ಪಕ್ವಗೊಳಿಸಿ ಹೇಗೆ ನಾವು ನಮ್ಮೊಳಗಿನ  ಭಗವಂತನ ದರ್ಶನವನ್ನು ಪಡೆಯಬಹುದು ಎನ್ನುವುದನ್ನು ವಿವರಿಸಿದ ಕೃಷ್ಣ,  ಮುಂದಿನ ಶ್ಲೋಕದಲ್ಲಿ ನಾವೆಂದೂ ಕಾಣದ ಆ ಭಗವಂತನನ್ನು ಯಾವ ರೀತಿ ಕಾಣಬೇಕು ಎನ್ನುವುದನ್ನು ವಿವರಿಸುತ್ತಾನೆ.

ಭೋಕ್ತಾರಂ ಯಜ್ಞತಪಸಾಂ ಸರ್ವಲೋಕಮಹೇಶ್ವರಮ್ ।
ಸುಹೃದಂ ಸರ್ವಭೂತಾನಾಂ ಜ್ಞಾತ್ವಾ ಮಾಂ ಶಾಂತಿಮೃಚ್ಛತಿ ॥೨೯॥

ಭೋಕ್ತಾರಮ್ ಯಜ್ಞ ತಪಸಾಮ್ ಸರ್ವಲೋಕ ಮಹೇಶ್ವರಮ್ ।
ಸುಹೃದಮ್ ಸರ್ವ ಭೂತಾನಾಮ್ ಜ್ಞಾತ್ವಾ ಮಾಮ್ ಶಾಂತಿಮ್ ಋಚ್ಛತಿ -- ಹೋಮಗಳನ್ನು-ವ್ರತಗಳನ್ನು ಉಣ್ಣುವವನೆಂದು, ಎಲ್ಲಾ ಲೋಕಗಳ ಒಡೆಯರಿಗೂ ಹಿರಿಯೊಡೆಯನೆಂದು, ಎಲ್ಲಾ ಜೀವಿಗಳ ನೇಹಿಗನೆಂದು ನನ್ನನ್ನು ತಿಳಿದವನು ಸುಖದ ಸೆಲೆಯಾದ ಮುಕ್ತಿಯನ್ನು ಪಡೆಯುತ್ತಾನೆ.

ಆ ಭಗವಂತ ಸರ್ವ ಯಜ್ಞಗಳ ಭೋಕ್ತಾರ. [ಇಲ್ಲಿ ಯಜ್ಞ ಅಂದರೆ ಅಗ್ನಿಮುಖದಲ್ಲಿ ಮಾಡುವ ಯಜ್ಞ ಮಾತ್ರವಲ್ಲ, ಹಿಂದೆ ವಿವರಿಸಿದ ಎಲ್ಲಾ ರೀತಿಯ ಯಜ್ಞ]. ನಾವು ಯಜ್ಞದಲ್ಲಿ ದೇವತೆಗಳ ಹೆಸರಿನಲ್ಲಿ ಅರ್ಪಿಸುವ ಹವಿಸ್ಸೂ ಕೂಡಾ ಆ ದೇವತೆಯೊಳಗೆ ಅಂತರ್ಯಾಮಿಯಾಗಿರುವ ಭಗವಂತನಿಗೆ ಅರ್ಪಿತ ಎನ್ನುವ ಭಾವನೆಯಿಂದ ಅರ್ಪಿಸಬೇಕು. ಭಗವಂತನಿಗೆ ಅರ್ಪಿಸದೇ ಅರ್ಪಿಸುವ ಯಾವ ಹವಿಸ್ಸನ್ನೂ ದೇವತೆಗಳು ಸ್ವೀಕರಿಸುವುದಿಲ್ಲ. ನಮ್ಮ ಪ್ರತಿಯೊಂದು ನಡೆಯಲ್ಲಿಯೂ ಭಗವಂತನ ಅನುಸಂಧಾನವಿರಬೇಕು. ಆತ ಸರ್ವಸಮರ್ಥ, ಸರ್ವಕ್ರಿಯೆಗಳ ನಿಯಾಮಕ, ಎಲ್ಲವೂ ಅವನಿಗೆ ಸಂದದ್ದು ಎನ್ನುವ ಅನುಸಂಧಾನ ಧ್ಯಾನದಲ್ಲಿ ಬಹಳ ಮುಖ್ಯ. ದೈಹಿಕವಾಗಿ, ಮಾನಸಿಕವಾಗಿ, ವಾಚಕವಾಗಿ ಅಚಲವಾದ ದೀಕ್ಷೆ ಇರಬೇಕು. ಯಾವ ಕಾಲಕ್ಕೂ ಅಪ್ರಾಮಾಣಿಕನಾಗಿ ಮಾತನಾಡುವುದಿಲ್ಲ ಎನ್ನುವ ದೀಕ್ಷೆ, ಸದಾ ಮನಸ್ಸಿನಲ್ಲಿ ಸತ್ಯದ ಬಗ್ಗೆ ಆಳವಾದ ಚಿಂತನೆ, ಸದಾ ಎಲ್ಲರ ಬಗ್ಗೆ ಸದ್ಭಾವ- ಹೀಗೆ ಇದೊಂದು ತಪಸ್ಸು. ನಾವು ಭಗವಂತನನ್ನು ಮರೆತು ಯಾರನ್ನು ಪೂಜಿಸಿದರೂ ಅದು ವ್ಯರ್ಥ.
ಕೆಲವರಿಗೆ ಭಗವಂತ ಎಂದರೆ ಭಯ! ಇಲ್ಲಿ ಕೃಷ್ಣ ಹೇಳುತ್ತಾನೆ: 'ಸುಹೃದಮ್ ಸರ್ವ ಭೂತಾನಾಮ್' ಎಂದು. ಭಗವಂತನ ಬಗ್ಗೆ ಎಂದೂ ಭಯಪಡಬೇಕಾಗಿಲ್ಲ. ಆತನಿಗಿಂತ ಆತ್ಮೀಯ ಗೆಳೆಯ ಇನ್ನೊಬ್ಬನಿಲ್ಲ. ನಮ್ಮನ್ನು ಸದಾ ಪ್ರೀತಿಸುವ, ನಿರಂತರ ನಮ್ಮ ಒಳಗೆ-ಹೊರಗೆ ತುಂಬಿ ಸದಾ ರಕ್ಷಿಸುವ ಶಕ್ತಿ ಭಗವಂತ. ಪ್ರತಿಯೊಬ್ಬರನ್ನೂ ಅವರವರ ಯೋಗ್ಯತೆಗೆ ತಕ್ಕಂತೆ ಬೆಳೆಸುವ, ತಪ್ಪು ಮಾಡಿದಾಗ ಕೇವಲ ತಿದ್ದುವುದಕ್ಕೋಸ್ಕರ ಶಿಕ್ಷೆ ಕೊಟ್ಟು ದಾರಿ ತೋರುವ, ಸದಾ ಕಾರುಣ್ಯದಿಂದ ಮೇಲೆತ್ತುವ 'ಸುಹೃತ್' ಆ ಭಗವಂತ. ಇಂತಹ ಕರುಣಾಳು ಇನ್ನೊಬ್ಬನಿಲ್ಲ ಎನ್ನುವ ಜ್ಞಾನ ಧ್ಯಾನದಲ್ಲಿ ಬಹಳ ಮುಖ್ಯ. ಈ ವಿಚಾರವನ್ನು ತಿಳಿದು ಅನುಸರಿಸಿದವ ಜ್ಞಾನಾನಂದದ ಪರಾಕಾಷ್ಠೆಯಾದ ಮೋಕ್ಷವನ್ನುಪಡೆಯುತ್ತಾನೆ ಎನ್ನುತ್ತಾನೆ ಕೃಷ್ಣ.

ಇತಿ ಪಂಚಮೋಽಧ್ಯಾಯಃ

ಐದನೆಯ ಅಧ್ಯಾಯ ಮುಗಿಯಿತು.



# ಅಧ್ಯಾಯ ಆರು

ಹಿಂದಿನ ಅಧ್ಯಾಯದಲ್ಲಿ ಮುಖ್ಯವಾಗಿ ಭಗವಂತನ ಉಪಾಸನೆಯ ಸಾಧನೆಯನ್ನು ವಿವರಿಸಿದ ಕೃಷ್ಣ, ಈಗ ಆರನೇ ಅಧ್ಯಾಯದಲ್ಲಿ ಧ್ಯಾನಯೋಗ ಮತ್ತು ಧ್ಯಾನಸಮಾಧಿಯನ್ನು ತಳಸ್ಪರ್ಶಿಯಾಗಿ ವಿವರಿಸುತ್ತಾನೆ.

ಭಗವಾನುವಾಚ ।
ಅನಾಶ್ರಿತಃ ಕರ್ಮಫಲಂ ಕಾರ್ಯಂ ಕರ್ಮ ಕರೋತಿ ಯಃ ।
ಸ ಸಂನ್ಯಾಸೀ ಚ ಯೋಗೀ ಚ ನ ನಿರಗ್ನಿರ್ನ ಚಾಕ್ರಿಯಃ ॥೧॥

ಭಗವಾನ್ ಉವಾಚ- ಭಗವಂತ ಹೇಳಿದನು:
ಅನಾಶ್ರಿತಃ ಕರ್ಮಫಲಮ್ ಕಾರ್ಯಮ್ ಕರ್ಮ ಕರೋತಿ ಯಃ ।
ಸಃ ಸಂನ್ಯಾಸೀ ಚ ಯೋಗೀ ಚ ನ ನಿಃ ಅಗ್ನಿಃ ನ ಚ ಅಕ್ರಿಯಃ –ಕರ್ಮದ ಫಲ ನ್ಯಾಸ ಮಾಡಿ, ಕರ್ತವ್ಯವನ್ನು ಮಾಡುತ್ತಿರುವವನೇ ನಿಜವಾದ ಸಂನ್ಯಾಸಿ ಮತ್ತು ನಿಜವಾದ ಯೋಗಿ. ಬೆಂಕಿಯಲ್ಲಿ ಹೋಮಿಸದೇ ಇರುವವನಲ್ಲ, ಕರ್ಮವನ್ನು ತೊರೆದವನೂ ಅಲ್ಲ.

ಸಾಮಾನ್ಯವಾಗಿ ನಾವು ಕರ್ಮಯೋಗಿಗಳು ಬೇರೆ ಮತ್ತು ಸಂನ್ಯಾಸಿಗಳು ಬೇರೆ ಎಂದು ಎರಡು ಗುಂಪು ಮಾಡುತ್ತೇವೆ. ಇಲ್ಲಿ ಕೃಷ್ಣ ಯಾರು ಸಂನ್ಯಾಸಿಗಳು, ಯಾರು ಕರ್ಮಯೋಗಿಗಳು ಎನ್ನುವ ಲೋಕದ ಕಲ್ಪನೆಗಿಂತ ಭಿನ್ನವಾದ ವಿವರವನ್ನು ಈ ಶ್ಲೋಕದಲ್ಲಿ ನಮ್ಮ ಮುಂದಿಟ್ಟಿದ್ದಾನೆ. ಕೃಷ್ಣ ಹೇಳುತ್ತಾನೆ: "ಅನಾಶ್ರಿತಃ ಕರ್ಮಫಲಂ" ಎಂದು. ನಾವು ಸಾಮಾನ್ಯವಾಗಿ ಕರ್ಮತ್ಯಾಗ ಮಾಡಿದವರು ಸಂನ್ಯಾಸಿಗಳು, ಕರ್ಮ ಮಾಡುವವರು ಗೃಹಸ್ಥರೆಂದು ಭಾವಿಸುತ್ತೇವೆ. ಆದರೆ ಕೃಷ್ಣ ಹೇಳುತ್ತಾನೆ ಪ್ರತಿಯೊಬ್ಬರೂ ಕರ್ಮಯೋಗಿಗಳಾಗಬೇಕು ಮತ್ತು ಪ್ರತಿಯೊಬ್ಬರೂ ಸಂನ್ಯಾಸಿಗಳಾಗಬೇಕು ಎಂದು. ಇದು ಒಂದನ್ನು ಬಿಟ್ಟು ಒಂದು ಇರತಕ್ಕಂತದ್ದಲ್ಲ. ಸಂನ್ಯಾಸಿ ಎಂದರೆ ನಾವು ಮಾಡಿದ್ದನ್ನೆಲ್ಲಾ ಭಗವಂತನಿಗೆ ಅರ್ಪಿಸುವುದೇ ಹೊರತು ಏನೂ ಮಾಡದೇ ಇರುವುದಲ್ಲ. ಸಮಸ್ತ(ಸಂ) ಕರ್ಮವನ್ನು ಭಗವಂತನಿಗೆ ಅರ್ಪಿಸುವುದು 'ಸಂ-ನ್ಯಾಸ'. ಇಲ್ಲಿ ಬಹಳ ಮುಖ್ಯವಾದ ವಿಷಯ ಎಂದರೆ ಕರ್ಮದ ಫಲದ ಬಯಕೆಯನ್ನು ಸಂಪೂರ್ಣನಾದ ಭಗವಂತನ ಹೃದಯದಲ್ಲಿ ನೆಲೆಗೊಳಿಸುವುದು.
ಸಂನ್ಯಾಸ ಎಂದರೆ ತನ್ನ ಕುಟುಂಬವನ್ನು ತೊರೆದು ಕಾಡಿಗೆ ಹೋಗುವುದಲ್ಲ. ಕರ್ಮಯೋಗ ಮಾಡಲೇ ಬೇಕು. "ಕಾರ್ಯಂ ಕರ್ಮ ಕರೋತಿ ಯಃ" ಯಾರ್ಯಾರಿಗೆ ಯಾವುದ್ಯಾವುದು ಕಾರ್ಯವೋ ಅವರವರು ಅದನ್ನದನ್ನು ಮಾಡಲೇಬೇಕು. ಈ ಕಾರಣಕ್ಕಾಗಿ ಸಂನ್ಯಾಸ ಮತ್ತು ಕರ್ಮಯೋಗ ಎರಡೂ ಒಟ್ಟೊಟ್ಟಿಗಿರುವುದು. ನಿಜವಾದ ಸಂನ್ಯಾಸಿ ಕರ್ಮಯೋಗಿಯಾಗಿರುತ್ತಾನೆ, ಮತ್ತು ನಿಜವಾದ ಕರ್ಮಯೋಗಿ ಸಂನ್ಯಾಸಿಯಾಗಿರುತ್ತಾನೆ. ಇದಲ್ಲದೆ ನಾವು ತಿಳಿದಂತೆ ಕೇವಲ ಅಗ್ನಿಯನ್ನು ತ್ಯಾಗ ಮಾಡಿದವರು, ಕರ್ಮವನ್ನು ತ್ಯಾಗ ಮಾಡಿದವರು ಸಂನ್ಯಾಸಿಗಳು ಅಥವಾ ಯೋಗಿಗಳಲ್ಲ.

ಸಂನ್ಯಾಸಿ ಎಂದೂ ನಿಷ್ಕ್ರೀಯ ಅಲ್ಲ. ಪ್ರತಿಯೊಬ್ಬರಿಗೂ ಅವರದ್ದೇ ಆದ ಕ್ರಿಯೆ ಇರುತ್ತದೆ. ಬ್ರಹ್ಮಚಾರಿಯಾದವನು ಅಧ್ಯಯನ, ಗುರುಕುಲವಾಸ, ಗುರು ಶುಶ್ರೂಷೆ, ಇತ್ಯಾದಿ ಕಾರ್ಯ ಮಾಡಿದರೆ, ಗೃಹಸ್ಥ ಅತಿಥಿ ಸತ್ಕಾರ, ಸಂಸಾರ ಪಾಲನೆ ಇತ್ಯಾದಿ ಕಾರ್ಯವನ್ನು ಮಾಡುತ್ತಾನೆ. ಹೀಗಾಗಿ ಎಲ್ಲರಿಗೂ ಕರ್ಮವಿದೆ.

ಯಂ ಸಂನ್ಯಾಸಮಿತಿ ಪ್ರಾಹುರ್ಯೋಗಂ ತಂ ವಿದ್ಧಿ ಪಾಂಡವ ।
ನಹ್ಯಸಂನ್ಯಸ್ತಸಂಕಲ್ಪೋ ಯೋಗೀ ಭವತಿ ಕಶ್ಚನ ॥೨॥

ಯಮ್ ಸಂನ್ಯಾಸಮ್ ಇತಿ ಪ್ರಾಹುಃ ಯೋಗಮ್ ತಮ್ ವಿದ್ಧಿ ಪಾಂಡವ ।
ನ ಹಿ ಅಸಂನ್ಯಸ್ತ ಸಂಕಲ್ಪಃ ಯೋಗೀ ಭವತಿ ಕಶ್ಚನ-ಯಾವುದನ್ನು ಸಂನ್ಯಾಸವೆನ್ನುವರೋ ಅದನ್ನೇ ಯೋಗವೆಂದು ತಿಳಿ ಪಾಂಡವಾ. ಬಯಕೆಗಳ 'ಸಂನ್ಯಾಸ' ಮಾಡದ ಯಾವನೂ ಮರ್ಮವರಿತ ಕರ್ಮಯೋಗಿಯಾಗಲಾರ.

ಸಂನ್ಯಾಸ ಕೂಡಾ ಒಂದು ಯೋಗ. ಕರ್ಮ ಫಲತ್ಯಾಗ ಕೂಡಾ ಕರ್ಮ ಮಾಡತಕ್ಕ ಕರ್ಮಯೋಗಿಯ ಯೋಗದ ಒಂದು ಮುಖ. ಎಲ್ಲವನ್ನೂ ಭಗವಂತನಿಗೆ ಅರ್ಪಣೆ ಮಾಡಿ ಫಲಕಾಮನೆ ಇಲ್ಲದೆ ಭಗವದ್ ಪೂಜಾ ದೃಷ್ಟಿಯಿಂದ ಮಾಡುವಂತಹ ಕ್ರಿಯೆ ಸಾತ್ವಿಕರ ಸಾಧನೆ. ಸಂನ್ಯಾಸ ಎಂದರೆ ಕಾಮ-ಸಂಕಲ್ಪವನ್ನು ಭಗವಂತನಲ್ಲಿ ಅರ್ಪಿಸುವುದು. ಕಾಮ ಅಂದರೆ 'ಮಾಡಬೇಕು' ಎಂದು ಬಯಸುವುದು, ಸಂಕಲ್ಪ ಎಂದರೆ 'ಮಾಡುತ್ತೇನೆ' ಎಂದು ನಿರ್ಧರಿಸುವುದು. ಕಾಮಸಂಕಲ್ಪ ವರ್ಜಿತ-ಸಂನ್ಯಾಸ. ಇಲ್ಲಿ ಕೃಷ್ಣ ವಿವರಿಸುತ್ತಿರುವುದು ಆಶ್ರಮಕ್ಕೆ(ಸಂನ್ಯಾಸಾಶ್ರಮ) ಸಂಬಂಧಪಟ್ಟ ವಿಚಾರವಲ್ಲ. ಇದು ಸಾಧನೆಗೆ ಸಂಬಂಧಪಟ್ಟ ವಿಚಾರ. ಸಾಧನೆಯ ಮುಖದಲ್ಲಿ ಯೋಗಿಗಳು ಸಂನ್ಯಾಸಿಗಳಾಗಬೇಕು ಮತ್ತು ಸಂನ್ಯಾಸಿಗಳು ಯೋಗಿಗಳಾಗಬೇಕು ಇದು ಕೃಷ್ಣನ ಸಂದೇಶ.

ನಾವು ಸಾಧನೆ ಮಾಡುವಾಗ ಕರ್ಮವೂ ಇರಬೇಕು, ಫಲನ್ಯಾಸವೂ ಇರಬೇಕು. ಹೀಗಿರುವಾಗ ಎಲ್ಲರೂ ಮಾಡಬೇಕಾದ ಕರ್ಮ ಎಂದು ಯಾವುದಾದರೂ ಕರ್ಮವನ್ನು ಪರಿಗಣನೆ ಮಾಡಿದ್ದಾರೋ ? ಸಾಧಕನ ಸಾಮಾಜಿಕ ಕರ್ತವ್ಯ ಯಾವುದು? ಸಮಾಜದೊಂದಿಗೆ ಒಬ್ಬ ಸಾಧಕ ಹೇಗೆ ಸ್ಪಂದಿಸಬೇಕು? ಕರ್ಮದ ಕೊನೆ ಎಂದು? ಸಾಧನೆಗೂ ಕರ್ಮಕ್ಕೂ ಇರುವ ಹೊಂದಿಕೆ ಏನು? ಅದು ಹೇಗೆ ಸಾಧನೆಗೆ ಪೂರಕ? ಈ ಎಲ್ಲಾ ಪ್ರಶ್ನೆಗಳಿಗೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರ ಕೊಡುತ್ತಾನೆ.

ಆರುರುಕ್ಷೋರ್ಮುನೇರ್ಯೋಗಂ ಕರ್ಮ ಕಾರಣಮುಚ್ಯತೇ ।
ಯೋಗಾರೂಢಸ್ಯ ತಸ್ಯೈವ ಶಮಃ ಕಾರಣಮುಚ್ಯತೇ ॥೩॥

ಆರುರುಕ್ಷೋಃ ಮುನೇಃ ಯೋಗಮ್ ಕರ್ಮ ಕಾರಣಮ್ ಉಚ್ಯತೇ ।
ಯೋಗ ಆರೂಢಸ್ಯ ತಸ್ಯ ಏವ ಶಮಃ ಕಾರಣಮ್ ಉಚ್ಯತೇ –ಸಾಧನೆಯ ಮೆಟ್ಟಲೇರುವವನಿಗೆ ಗುರಿ ಮುಟ್ಟಲು ಕರ್ಮಯೋಗ[ಹಲವು ಬಗೆಯ ಜನಸೇವೆ]ಕಾರಣವೆನಿಸುತ್ತದೆ. ಅವನೇ ಗುರಿ ಸೇರಿದಾಗ ಭಗವದ್ ಸಮಾಧಿ [ಜನ ಸೇವೆಯಿಂದ ವಿರಾಮ ಮತ್ತು ಭಗವಂತನಲ್ಲಿ ಧ್ಯಾನ ನಿಷ್ಠೆ] ಸುಖದ ಹೆಚ್ಚಳಕ್ಕೆ ಕಾರಣವೆನಿಸುತ್ತದೆ.

ಈ ಶ್ಲೋಕಕ್ಕೆ ಎರಡು ಆಯಾಮವಿದೆ. ಒಬ್ಬ ಸಾಧಕ ತನ್ನ ನಿತ್ಯಕರ್ಮವನ್ನು ಎಲ್ಲಿಯ ತನಕ ಮಾಡಬೇಕು ಮತ್ತು ಎಲ್ಲಿಂದ ಬಿಡಬಹುದು ಎನ್ನುವುದು ಒಂದು ಆಯಾಮವಾದರೆ, ಇನ್ನೊಂದು ಸಾಮಾಜಿಕವಾಗಿ ಒಬ್ಬ ಸಾಧಕನ ಕರ್ತವ್ಯವೇನು ಎನ್ನುವುದನ್ನು ಈ ಶ್ಲೋಕ ವಿವರಿಸುತ್ತದೆ.
ಇನ್ನೂ ಸಿದ್ಧಿ ಪಡೆಯದ, ಸಾಧನೆಯ ಹಾದಿಯಲ್ಲಿರುವ ಒಬ್ಬ ಸಾಧಕ ಆ ಸ್ಥಿತಿಯಲ್ಲಿ ಎಲ್ಲಾ ವಿಹಿತಕರ್ಮವನ್ನು ಮಾಡುತ್ತಿರಬೇಕು, ಯಾವುದನ್ನೂ ಬಿಡುವಂತಿಲ್ಲ. ಸಿದ್ಧನಾದ ಮೇಲೆ ಆತ ಸಮಾಧಿ ಸ್ಥಿತಿಯಲ್ಲಿ ಭಗವಂತನನ್ನು ಒಳಗಿನಿಂದ ಕಾಣಬಲ್ಲ. ಆ ಸ್ಥಿತಿಯಲ್ಲಿ ಆತನಿಗೆ ಉಳಿದ ಕರ್ಮಗಳಿಗಿಂತ ಅಂತರಂಗದಲ್ಲಿ ಭಗವಂತನನ್ನು ಕಾಣುವ ಕರ್ಮ ಮುಖ್ಯವಾಗುತ್ತದೆ. ಒಬ್ಬ ಅಪರೋಕ್ಷ ಜ್ಞಾನ ಬಂದವ ಸದಾ ಸಮಾಧಿ ಸ್ಥಿತಿಯಲ್ಲಿ ಇರಲು ಸಾಧ್ಯವಿಲ್ಲ. ಅವನು ಹೊರ ಪ್ರಪಂಚಕ್ಕೆ ಬರಲೇ ಬೇಕು. ಆಗ ಅವನ ಮುಖ್ಯ ಕರ್ಮವೆಂದರೆ ಶಾಸ್ತ್ರ ಶ್ರವಣ, ಮಂತ್ರ ಜಪ, ಪ್ರವಚನ ಇತ್ಯಾದಿ. ಆದ್ದರಿಂದ ವಿಹಿತಕರ್ಮಗಳ ವಿಧಿನಿಷೇಧ ಬದ್ಧತೆ ಅಪರೋಕ್ಷ ಜ್ಞಾನದವರೆಗೆ ಮಾತ್ರ. ಉದಾಹರಣೆಗೆ ಒಬ್ಬ ಅಪರೋಕ್ಷ ಜ್ಞಾನಿ ಧ್ಯಾನಕ್ಕೆ ಕುಳಿತಿದ್ದಾನೆ. ಆತ ತನ್ನ ಅಂತರಂಗದಲ್ಲಿ ಭಗವಂತನನ್ನು ಕಾಣುತ್ತಿದ್ದಾನೆ ಮತ್ತು ಆ ಆನಂದದಲ್ಲಿ ಮುಳುಗಿದ್ದಾನೆ. ಅದು ಬೆಳಗಿನಜಾವ-ಸೂರ್ಯೋದಯದ ಕಾಲ. ಸ್ನಾನ ಮಾಡಿ ಸಂಧ್ಯಾವಂದನೆ ಮಾಡುವ ಸಮಯದಲ್ಲಿ ಈತ ಧ್ಯಾನದಲ್ಲಿ ಕುಳಿತಿದ್ದಾನಲ್ಲ ಎಂದು ನಾವು ಅವನನ್ನು ಎಬ್ಬಿಸುವುದು ತಪ್ಪು. ಆತ ಸಂಧ್ಯಾವಂದನೆ ಮಾಡದಿದ್ದರೆ ಯಾವ ಕರ್ಮ ಲೇಪವೂ ಆಗುವುದಿಲ್ಲ. ಏಕೆಂದರೆ ಸಂಧ್ಯಾವಂದನೆ ಮಾಡುವುದು ಭಗವಂತನ ದರ್ಶನಕ್ಕಾಗಿ. ಆದರೆ ಆತ ಆಗಲೇ ಭಗವಂತನ ದರ್ಶನ ಪಡೆಯುತ್ತಿದ್ದಾನೆ. ಹೀಗೆ ಅಪರೋಕ್ಷ ಜ್ಞಾನಿಗೆ ಕರ್ಮದ ಬದ್ಧತೆ ಇಲ್ಲ. ಸಮಾಧಿಸ್ಥಿತಿಯಿಂದ ಹೊರಬಂದ ಮೇಲೆ ಇರತಕ್ಕ ಕರ್ತವ್ಯ ಎಂದರೆ ಭಗವಂತನ ಗುಣಗಾನ, ಪ್ರವಚನ, ಅಧ್ಯಯನ, ಜಪ ಇತ್ಯಾದಿ.
ಈ ಶ್ಲೋಕದ ಇನ್ನೊಂದು ಆಯಾಮವನ್ನು ಬಹಳ ಸುಂದರವಾಗಿ ಮಧ್ವಾಚಾರ್ಯರು ತಮ್ಮ ಗೀತಾತಾತ್ಪರ್ಯದಲ್ಲಿ ವಿವರಿಸಿದ್ದಾರೆ. ಇದು ಮುಖ್ಯವಾಗಿ ಒಬ್ಬ ಸಾಧಕನ ಸಾಮಾಜಿಕ ನಡೆ ಹೇಗಿರಬೇಕು ಎನ್ನುವುದನ್ನು ವಿವರಿಸುತ್ತದೆ. ಕರ್ಮ ಎನ್ನುವುದಕ್ಕೆ ಆಚಾರ್ಯರು ಒಂದು ಅಪೂರ್ವ ಅರ್ಥವನ್ನು ಕೊಟ್ಟಿದ್ದಾರೆ. ಕರ್ಮ ಅಂದರೆ ಕರ+ಮ. ಕರ ಅಂದರೆ ಕಂದಾಯ(Duty). ಯಾವುದನ್ನು ಕಂದಾಯವೆಂದು ತಿಳಿದು ನಾವು ಮಾಡಬೇಕೋ ಅದು 'ಕರ-ಮ'. ನಾವು ಭಗವಂತನ ರಾಜ್ಯದಲ್ಲಿನ ಪ್ರಜೆಗಳು. ಅದಕ್ಕೋಸ್ಕರ ಅವನಿಗೆ ನಾವು ಕೊಡುವ ಕರ-ಕರ್ಮ. ಯಾವುದೋ ಅಭಿಲಾಷೆಯಿಂದ ದೇವಸ್ಥಾನದಲ್ಲಿ ನಾವು ಕಾಣಿಕೆ ಹಾಕುವುದು ನಿಜವಾದ ಕಂದಾಯವಲ್ಲ. ಅದನ್ನು ಭಗವಂತ ಬಯಸುವುದೂ ಇಲ್ಲ. ಭಗವಂತ ನಮ್ಮಿಂದ ಬಯಸುವ ಕರ್ಮ ಕಷ್ಟದಲ್ಲಿರುವವರ ಶುಶ್ರೂಷೆ. ಒಬ್ಬ ಸಾಧಕ ಅಪರೋಕ್ಷ ಸಾಧಕನಾಗುವ ತನಕ ಅವನ ಸಾಧನೆಯಲ್ಲಿ ಇದು ಒಂದು ಮುಖ್ಯ ಸಾಧನೆ. ಸಮಸ್ತ ಜೀವಜಾತದ ಮೇಲೆ ಅನುಕಂಪ, ಸೇವಾ ಮನೋವೃತ್ತಿ ಬಹಳ ಮುಖ್ಯ. ಯೋಗಶಾಸ್ತ್ರದಲ್ಲಿ ಕೂಡಾ ಇದನ್ನೇ ಹೇಳುತ್ತಾರೆ. ಮೈತ್ರಿ, ಕರುಣಾ, ಮುದಿತ ಮತ್ತು ಉಪೇಕ್ಷ ಎನ್ನುವ ನಾಲ್ಕು

ಮನೋವೃತ್ತಿ ಒಬ್ಬ ಸಾಧಕನಲ್ಲಿರಬೇಕು. ಮೈತ್ರಿ ಎಂದರೆ ಸಜ್ಜನರ ಸಹವಾಸ. ಎಲ್ಲಿ ಒಳ್ಳೆಯತನವಿದೆ ಅವರ ಸ್ನೇಹ. ದುಃಖವನ್ನು ಕಂಡಾಗ ಅಲ್ಲಿ ಕರುಣೆ ಹಾಗೂ ನೆರವು-ಕರುಣಾ. ಇನ್ನೊಬ್ಬರ ಉದ್ಧಾರ ನೋಡಿ ಸಂತೋಷಪಡುವುದು ಮುದಿತ. ದುಷ್ಟರಿಂದ ದೂರವಿರುವುದು ಉಪೇಕ್ಷ. ಕೆಟ್ಟವರೊಂದಿಗೆ ಜಗಳ ಬೇಡ ಆದರೆ ಅವರ ಒಡನಾಟದಿಂದ ಯಾವುದೇ ದ್ವೇಷವಿಲ್ಲದೆ ದೂರವಿರುವುದು ಉಪೇಕ್ಷ. ಹೀಗೆ ಸಾಧಕನ ಜೀವನದಲ್ಲಿ ಇದು ಮಹತ್ತರವಾದ ಸಾಮಾಜಿಕ ಕರ್ತವ್ಯ. ಒಬ್ಬ ಸಿದ್ಧನಾದವ(ಯೋಗಾರೂಢ) ಸದಾ ಅಂತರ್ಮುಖಿಯಾಗಿರುತ್ತಾನೆ. ಅವನಿಗೆ ಈ ಸಾಮಾಜಿಕ ಬದ್ಧತೆ ಇಲ್ಲ(ಅವನಿಗೆ ಅದು ಸಾಧ್ಯವಾಗುವುದಿಲ್ಲ). ಅವನ ಆನಂದಾಭಿವೃದ್ಧಿಗೆ ಕಾರಣ 'ಶಮಃ'. ಅಂದರೆ ಸದಾ ಭಗವಂತನಲ್ಲೇ ಮನಸ್ಸನ್ನು ನೆಟ್ಟಿರುವುದು. ಅದರಿಂದ ವ್ಯತಿರಿಕ್ತವಾದ ಇನ್ನೊಂದು ಕರ್ಮ ಅವನಿಗಿಲ್ಲ.

ಹೀಗೆ ಲೋಕಸೇವೆ ಎನ್ನುವುದು ಒಬ್ಬ ಸಾಧಕನ ಅವಿಭಾಜ್ಯ ಅಂಗವಾಗಬೇಕು ಎನ್ನುವುದನ್ನು ಕೃಷ್ಣ ಈ ಶ್ಲೋಕದಲ್ಲಿ ಸ್ಪಷ್ಟವಾಗಿ ಹೇಳಿದ. ಯೋಗಾರೂಢನಿಗೆ ಯಾವ ಸಾಮಾಜಿಕ ಭದ್ಧತೆಯೂ ಇಲ್ಲ, ಅವನು ಅಂತರಂಗದಲ್ಲಿ ಭಗವಂತನನ್ನು ಕಾಣುತ್ತಿರುತ್ತಾನೆ ಎಂದು ಕೃಷ್ಣ ಹೇಳಿದಾಗ ನಮಗೆ ಒಂದು ಪ್ರಶ್ನೆ ಮೂಡಬಹುದು. ಇಂತಹ ಅಪರೋಕ್ಷ ಜ್ಞಾನಿಗಳನ್ನು ಗುರುತಿಸುವುದು ಹೇಗೆ ಎಂದು. ಮುಂದಿನ ಶ್ಲೋಕ ಈ ನಮ್ಮ ಪ್ರಶ್ನೆಗೆ ಉತ್ತರ ರೂಪದಲ್ಲಿದೆ.

ಯದಾ ಹಿ ನೇಂದ್ರಿಯಾರ್ಥೇಷು ನ ಕರ್ಮಸ್ವನುಷಜ್ಜತೇ ।
ಸರ್ವಸಂಕಲ್ಪಸಂನ್ಯಾಸೀ ಯೋಗಾರೂಢಸ್ತದೋಚ್ಯತೇ ॥೪॥

ಯದಾ ಹಿ ನ ಇಂದ್ರಿಯ ಅರ್ಥೇಷು ನ ಕರ್ಮಸು ಅನುಷಜ್ಜತೇ ।
ಸರ್ವ ಸಂಕಲ್ಪ ಸಂನ್ಯಾಸೀ ಯೋಗಾರೂಢಃ ತದಾ ಉಚ್ಯತೇ -- ಎಲ್ಲಾ ಕರ್ಮದ ಹೊಣೆಯನ್ನೂ ಭಗವಂತನಿಗರ್ಪಿಸಿ, ಇಂದ್ರಿಯ ವಿಷಯಗಳಲ್ಲಿ ಮತ್ತು ಕರ್ಮಗಳಲ್ಲಿ ಬಗೆಯ ನಂಟು ಕಳೆದುಕೊಂಡಾಗ ಸಾಧನೆಯ ಗುರಿ ಸೇರಿದವನೆನಿಸುತ್ತಾನೆ.

ಅಪರೋಕ್ಷ ಜ್ಞಾನಿಯ ಲಕ್ಷಣವನ್ನು ಹೇಳುತ್ತಾ ಕೃಷ್ಣ ಹೇಳುತ್ತಾನೆ: "ಯದಾ ಹಿ ನ ಇಂದ್ರಿಯ ಅರ್ಥೇಷು ನ ಕರ್ಮಸು ಅನುಷಜ್ಜತೇ" ಎಂದು. ಅಂದರೆ ಅಪರೋಕ್ಷ ಜ್ಞಾನಿ ಇಂದ್ರಿಯಗಳನ್ನು ಸೆಳೆಯುವ ಸಂಗತಿಗಳಲ್ಲಿ (ಶಬ್ದ, ರೂಪ, ರಸ, ಗಂಧ, ಸ್ಪರ್ಶ), ಅಥವಾ ಯಾವ ವಿಷಯದಲ್ಲೂ ಅಂಟಿಕೊಂಡಿರುವುದಿಲ್ಲ. ಆತ ಕ್ರಿಯೆ ಮಾಡುತ್ತಾನೆ ಆದರೆ ಅದಕ್ಕೆ ತನ್ನನ್ನು ಅಂಟಿಸಿಕೊಳ್ಳುವುದಿಲ್ಲ. ಸಾಧನೆಯ ಹಾದಿಯಲ್ಲಿರುವ ಸಾಧಕ ಕಷ್ಟಪಟ್ಟು ಇಂದ್ರಿಯ ನಿಗ್ರಹ ಮಾಡಿದರೆ, ಅಪರೋಕ್ಷ ಜ್ಞಾನಿಗಳಿಗೆ ಇದು ಸಹಜ ಧರ್ಮವಾಗಿರುತ್ತದೆ. ಋಗ್ವೇದದಲ್ಲಿ ಹೇಳುವಂತೆ "ಜಗತ್ತಿನ ನಿಯಾಮಕ ನರಸಿಂಹ. ಅವನ ಬಯಕೆಯೇ ನನ್ನ ಬಯಕೆಯಾಗಲಿ. ಅವನ ಹೃದಯದಲ್ಲಿ ಏನು ಬಯಕೆ ಇದೆ ಅದೇ ನನ್ನ ಭಾವನೆಯಾಗಲಿ. ಅದಕ್ಕೆ ವಿರುದ್ಧವಾದ ಸಂಕಲ್ಪ ನನಗೆ ಬಾರದೇ ಇರಲಿ". ಈ ರೀತಿ ಅಪರೋಕ್ಷಜ್ಞಾನಿ ಬಯಸುತ್ತಾನೆ. ಅವನು ಏನನ್ನೂ ಕೂಡಾ ಇಂದ್ರಿಯದ ಮೂಲಕ ಅನುಭವಿಸಬೇಕು ಎಂದು ಬಯಸುವುದಿಲ್ಲ, ಪರಿತಪಿಸುವುದಿಲ್ಲ. ಇಂದ್ರಿಯದ ಮೂಲಕ ಬಂದ ಅನುಭವದಿಂದ ಪ್ರಭಾವಿತನಾಗಿ

ಅದಕ್ಕೆ ಅಂಟಿಕೊಳ್ಳುವುದೂ ಇಲ್ಲ. ಎಲ್ಲವನ್ನೂ ತಟಸ್ಥವಾಗಿ ನೋಡುತ್ತಿರುತ್ತಾನೆ. ನಾವು ಸಮುದ್ರದ ತಟದಲ್ಲಿ ಕುಳಿತು ಸಮುದ್ರವನ್ನು ನೋಡುತ್ತಿದ್ದರೆ ಅಲ್ಲಿ ಅನೇಕ ರೀತಿಯ ಅಲೆಗಳಿರುತ್ತವೆ. ನಾವು ಆ ಅಲೆಗಳನ್ನು ನೋಡಿ ಆನಂದಿಸುತ್ತಿರುತ್ತೇವೆ. ಅಲ್ಲಿ ಬರುವ ತೆರೆಗಳ ನಿಯಂತ್ರಣ ನಮ್ಮ ಕೈಯಲ್ಲಿಲ್ಲ. ಯಾವ ಅಲೆ ಹೇಗೆ ಬಂತೋ ಹಾಗೇ ತಟಸ್ಥವಾಗಿ ಆಸ್ವಾದಿಸುವುದರಲ್ಲಿ ಆನಂದವಿದೆ. ಜೀವನ ಸಾಗರದಲ್ಲಿ ಕಷ್ಟ ಸುಖ ನೋವು ನಲಿವು ಎಲ್ಲವೂ ಅಲೆಗಳಂತೆ ಬಂದು ಹೋಗುತ್ತಿರುತ್ತವೆ. ಅದರ ನಿಯಂತ್ರಣ ನಮ್ಮ ಕೈಯಲ್ಲಿಲ್ಲ. ಸಮುದ್ರದ ಅಲೆಯನ್ನು ನೋಡಿ ಸಂತೋಷಪಟ್ಟಂತೆ ಈ ಜೀವನದ ಅಲೆಯನ್ನು ಸಹಜವಾಗಿ ನೋಡಿ ಸಂತೋಷಪಡುತ್ತಾ ಬಾಳುವುದೇ ಅಪರೋಕ್ಷ ಜ್ಞಾನಿಯ ಲಕ್ಷಣ.

ಈ ಅಧ್ಯಾಯದಲ್ಲಿ ಕೃಷ್ಣ ಧ್ಯಾನದ ಸಂಪೂರ್ಣ ಪ್ರಕ್ರಿಯೆಯನ್ನು ಮುಂದೆ ವಿವರಿಸುತ್ತಾನೆ. ಅದಕ್ಕಾಗಿ ನಮ್ಮ ಮನಸ್ಸನ್ನು ಹೇಗೆ ಸಜ್ಜುಗೊಳಿಸಬೇಕು, ನಾವು ಯೋಗಾರೂಢರಾಗಬೇಕಾದರೆ ಏನು ಮಾಡಬೇಕು ಎನ್ನುವುದರ ಪ್ರಸ್ತಾವನೆ ಮುಂದಿನ ಶ್ಲೋಕ.

ಉದ್ಧರೇದಾತ್ಮನಾಽಽತ್ಮಾನಂ ನಾಽತ್ಮಾನಮವಸಾದಯೇತ್ ।
ಆತ್ಮೈವ ಹ್ಯಾತ್ಮನೋ ಬಂಧುರಾತ್ಮೈವ ರಿಪುರಾತ್ಮನಃ ॥೫॥

ಉದ್ಧರೇತ್ ಆತ್ಮನಾ ಆತ್ಮಾನಮ್ ನ ಆತ್ಮಾನಮ್ ಅವಸಾದಯೇತ್ ।
ಆತ್ಮಾ ಏವ ಹಿ ಆತ್ಮನಃ ಬಂಧುಃ ಆತ್ಮಾ ಏವ ರಿಪುಃ ಆತ್ಮನಃ -ಬಗೆಯ ಬಲದಿಂದ [ಭಗವಂತನ ಹಸಾದದಿಂದ] ಜೀವವನ್ನು ಮೇಲೆತ್ತಬೇಕು; ಜೀವವನ್ನು ಜಂಜಡಗೊಳಿಸಬಾರದು. ಬಗೆಯೇ[ಭಗವಂತನೇ] ಜೀವದ ಗೆಳೆಯ; ಬಗೆಯೇ[ಭಗವಂತನೇ]ಜೀವದ ಹಗೆಯು.

ಈ ಹಿಂದೆ ಹೇಳಿದಂತೆ ಆತ್ಮ ಎನ್ನುವ ಪದಕ್ಕೆ ಅನೇಕ ಅರ್ಥಗಳಿವೆ. ಆತ್ಮ ಎಂದರೆ ಶರೀರ, ಮನಸ್ಸು, ಜೀವ, ಪರಮಾತ್ಮ. ಹೀಗೆ ಈ ಶ್ಲೋಕದಲ್ಲಿ ಬಂದಿರುವ ಆತ್ಮ ಶಬ್ದಕ್ಕೆ ಈ ಎಲ್ಲಾ ಅರ್ಥವನ್ನೂ ಜೋಡಿಸಿ ನೋಡಿದರೆ ಅನೇಕ ವಿಚಾರ ಸ್ಪಷ್ಟವಾಗುತ್ತದೆ. "ಉದ್ಧರೇತ್ ಆತ್ಮನಾ ಆತ್ಮಾನಮ್ ನ ಆತ್ಮಾನಮ್ ಅವಸಾದಯೇತ್" ಅಂದರೆ ನಮ್ಮ ಅಧಃಪಾತಕ್ಕೂ ಕಾರಣ ಮನಸ್ಸು. ನಮ್ಮ ಉದ್ಧಾರಕ್ಕೂ ಕಾರಣ ಮನಸ್ಸು. ಆದ್ದರಿಂದ ಮನಸ್ಸಿನಿಂದ(ಆತ್ಮನಾ) ಜೀವದ(ಆತ್ಮಾನಂ) ಉದ್ಧಾರದ ದಾರಿಯನ್ನು ಹುಡುಕು ಎನ್ನುತ್ತಾನೆ ಕೃಷ್ಣ. ಎಂದೂ ಮನಸ್ಸನ್ನು ಕೆಳಕ್ಕೆ ಕಳುಹಿಸಬೇಡ. ಆತ್ಮದ(ಜೀವದ) ಅವಸಾನಕ್ಕೆ ಕಾರಣವಾಗುವಂತೆ ಮನಸ್ಸನ್ನು ಸ್ವಚ್ಛಂದವಾಗಿ ಬಿಡಬೇಡ. ಅದನ್ನು ಮೇಲಕ್ಕೆ ಕೊಂಡು ಹೋಗು. ಮನಸ್ಸು ಕೆಳಗೆ ಹೋದರೆ ಅದು ನಮ್ಮನ್ನು ಪಾತಾಳಕ್ಕೆ ತಳ್ಳಿ ಬಿಡುತ್ತದೆ. 'ಆ ಮನಸ್ಸನ್ನು ಎತ್ತರಕ್ಕೆ ಕಳಿಸು. ಎತ್ತರಕ್ಕೆ ಹೋದ ಮನಸ್ಸು ನಿನ್ನನ್ನು ಎತ್ತರಕ್ಕೆ ಕೊಂಡೊಯ್ಯುತ್ತದೆ. ಮನಸ್ಸಿನಿಂದ ನಿನ್ನ ಜೀವ ಸ್ವರೂಪವನ್ನು ಉದ್ಧಾರ ಮಾಡಿಕೋ. ಜೀವಕ್ಕೆ ಮನಸ್ಸೇ ಬಂಧು, ಮನಸ್ಸೇ ಶತ್ರು. ಆದ್ದರಿಂದ ಸಾಧನೆ ಮಾಡಬೇಕಾದರೆ ಮನಸ್ಸನ್ನು ಬಂಧುವಾಗಿ ಪರಿವರ್ತನೆ ಮಾಡಿಕೋ. ಮನಸ್ಸು ನಿನ್ನ ಶತ್ರುವಾಗಿ ನಿಂತರೆ ನಿನ್ನ ಜೀವಮಾನದಲ್ಲೇ ಉದ್ಧಾರವಿಲ್ಲ. ಅದಕ್ಕಾಗಿ ಮೊದಲು ಬುದ್ಧಿಬಲದಿಂದ

ಮನಸ್ಸಿಗೆ ತರಬೇತಿ ಕೊಟ್ಟು ಅದನ್ನು ಗೆಲ್ಲಬೇಕು' ಎನ್ನುವುದು ಕೃಷ್ಣನ ಸಂದೇಶ. ಮನಸ್ಸನ್ನು ಗೆದ್ದರೆ ಎಲ್ಲವೂ ಪ್ರಶಾಂತ, ಯಾವ ಗೊಂದಲವೂ ಇಲ್ಲ. ಇದು ಧ್ಯಾನಕ್ಕೆ ಬೇಕಾದ ಪೂರ್ವ ಸ್ಥಿತಿ.

ಕೃಷ್ಣನ ಈ ಸಂದೇಶ ಕೇಳಿದಾಗ ನಮಗೆ ಒಂದು ಪ್ರಶ್ನೆ ಎದುರಾಗುತ್ತದೆ. ಈ ಹಿಂದೆ ಕೃಷ್ಣನೇ ಹೇಳಿದಂತೆ ಯಾವುದೂ ನಮ್ಮ ಕೈಯಲ್ಲಿಲ್ಲ. ಭಗವಂತನ ಅನುಗ್ರಹವಿಲ್ಲದೆ ನಾವು ನಮ್ಮ ಮನಸ್ಸನ್ನು ಸ್ವತಂತ್ರವಾಗಿ ಎಂದೂ ನಿಯಂತ್ರಿಸಲು ಸಾಧ್ಯವಿಲ್ಲ. ಹೀಗಿರುವಾಗ ನಾವು ನಮ್ಮ ಮನಸ್ಸನ್ನು ನಿಯಂತ್ರಿಸುವುದು ಹೇಗೆ? ಈ ನಮ್ಮ ಪ್ರಶ್ನೆಗೆ ಇದೇ ಶ್ಲೋಕದಲ್ಲಿ ಉತ್ತರವಿದೆ.ಆತ್ಮ ಎಂದರೆ ಪರಮಾತ್ಮ ಎನ್ನುವ ಸೂಕ್ಷ್ಮ ಅರ್ಥದಲ್ಲಿ ಈ ಶ್ಲೋಕವನ್ನು ನೋಡಿದಾಗ ನಮ್ಮ ಪ್ರಶ್ನೆಗೆ ಉತ್ತರ ಸಿಗುತ್ತದೆ. "ಉದ್ಧರೇತ್ ಆತ್ಮನಾ ಆತ್ಮಾನಮ್" ಅಂದರೆ "ಆತ್ಮನಿಂದಲೇ(ಭಗವಂತನಿಂದಲೇ) ಆತ್ಮನನ್ನು(ಜೀವನನ್ನು) ಉದ್ಧರಿಸಬೇಕು. ಸಾಮಾನ್ಯವಾಗಿ ಮನಸ್ಸು ನಮ್ಮ ಮಾತನ್ನು ಕೇಳುವುದಿಲ್ಲ. "ನನ್ನಿಂದ ಇದು ಸಾಧ್ಯವಿಲ್ಲ" ಎನ್ನುತ್ತದೆ ಮನಸ್ಸು. ಆದರೆ ನಮಗೆ ಭಗವಂತ ಬುದ್ಧಿ ಕೊಟ್ಟಿದ್ದಾನೆ, ನಾವು ಅದನ್ನು ಉಪಯೋಗಿಸಬೇಕು. ಬುದ್ಧಿಯನ್ನು ಉಪಯೋಗಿಸಿ ಆ ಭಗವಂತನಲ್ಲಿ "ನನಗೆ ಒಳ್ಳೆಯ ಮನಸ್ಸನ್ನು ಕೊಡು, ನನ್ನನ್ನು ಉದ್ಧಾರದ ದಾರಿಯಲ್ಲಿ ನಡೆಸು, ಸಾಧನೆ ಮಾಡುವಂತಹ ಸದ್ಬುದ್ಧಿಯನ್ನು ಕೊಡು" ಎಂದು ಆ ಭಗವಂತನಲ್ಲಿ ನಿರಂತರ ಪ್ರಾರ್ಥಿಸು. ಆತ ನಮ್ಮ ಅತ್ಯಂತ ಆತ್ಮೀಯ ಹಿತಚಿಂತಕ ಬಂಧು. ಅವನೊಬ್ಬನೇ ಯಾವುದೇ ಸ್ವಾರ್ಥವಿಲ್ಲದ, ಶಾಶ್ವತ, ನಿರ್ವ್ಯಾಜ್ಯ, ನಿರಂತರ ಬಂಧು. ಆತ ಖಂಡಿತ ನಮ್ಮ ಪ್ರಾರ್ಥನೆಯನ್ನು ಮನ್ನಿಸಿ ನಮ್ಮ ಮನಸ್ಸಿನಲ್ಲಿ ಬಂದು ಕೂರುತ್ತಾನೆ.

ಭಗವಂತನನ್ನು ನಾವು ಹೇಗೆ ಕಾಣುತ್ತೇವೇ ಅದೇ ಭಾವದಲ್ಲಿ ಆತ ವ್ಯಕ್ತನಾಗುತ್ತಾನೆ. ದೇವತೆಗಳು ಆತನನ್ನು ಜ್ಞಾನಿಯಾಗಿ ಕಂಡರು- ಆತ ಅವರಿಗೆ ಜ್ಞಾನಿಯಾಗಿ ಕಾಣಿಸಿಕೊಂಡು ಅವರ ಉದ್ಧಾರ ಮಾಡಿದ. ರಾಕ್ಷಸರು ಆತ ಕೊಲ್ಲುವವ ಮತ್ತು ಶತ್ರು ಎಂದು ತಿಳಿದು ಅವನನ್ನು ದ್ವೇಷಿಸಿದರು- ಆತ ಅವರಿಗೆ ಶತ್ರುವಾಗಿ ಕಾಣಿಸಿದ. ಆದ್ದರಿಂದ ಕೃಷ್ಣ ಹೇಳುತ್ತಾನೆ: "ಆತ್ಮಾ ಏವ ರಿಪುಃ ಆತ್ಮನಃ" ಎಂದು. ಅಂದರೆ ನಾವು ಅಹಂಕಾರದಿಂದ ದಾರಿ ತಪ್ಪಿದಾಗ ಆತ ನಮಗೆ ನಮ್ಮ ಶತ್ರುವಿನಂತೆ ಭಾಸವಾಗುತ್ತಾನೆ. ಈ ಬಗ್ಗೆ ಮುಂದಿನ ಶ್ಲೋಕ ಇನ್ನೂ ಹೆಚ್ಚಿನ ಬೆಳಕನ್ನು ಚೆಲ್ಲುತ್ತದೆ.

ಬಂಧುರಾತ್ಮಾSSತ್ಮನಸ್ತಸ್ಯ ಯೇನಾSತ್ಮೈವಾSತ್ಮನಾ ಜಿತಃ ।
ಅನಾತ್ಮನಸ್ತು ಶತ್ರುತ್ವೇ ವರ್ತೇತಾSತ್ಮೈವ ಶತ್ರುವತ್ ॥೬॥

ಬಂಧುಃ ಆತ್ಮಾ ಆತ್ಮನಃ ತಸ್ಯ ಯೇನ ಆತ್ಮಾ ಏವ ಆತ್ಮನಾ ಜಿತಃ ।

ಅನಾತ್ಮನಃ ತು ಶತ್ರುತ್ವೇ ವರ್ತೇತ ಆತ್ಮಾ ಏವ ಶತ್ರುವತ್--ಯಾವ ಜೀವ ವಿವೇಕದಿಂದ ಬಗೆಯನ್ನು [ಭಕ್ತಿಯಿಂದ ಭಗವಂತನನ್ನು]ಗೆದೆಯಬಲ್ಲದೋ [ಯಾವ ಜೀವದಿಂದ ಬಗೆ ಹದಗೊಂಡಿದೆಯೋ], ಅಂತಹ ಜೀವಕ್ಕೆ ಬಗೆ[ಭಗವಂತ]ಗೆಳೆಯ. ಬಗೆಯನ್ನು[ಭಗವಂತನನ್ನು] ಗೆದೆಯಲಾರದವನಿಗೆ ಬಗೆಯೇ [ಭಗವಂತನೇ] ಹಗೆಯಾಳಿನಂತೆ ಎದುರಾಳಿ.

ಯಾರು ಭಗವಂತನನ್ನು ಗೆದ್ದಿದ್ದಾರೋ(ಭಗವಂತನ ಪ್ರೀತಿಗೆ ಪಾತ್ರರಾಗಿದ್ದಾರೋ) ಅವರಿಗೆ ಆತ ಬಂಧು. ಭಗವಂತನ ಪ್ರೀತಿಗೆ ಪಾತ್ರರಾಗಲು ಆತನ ಅನುಗ್ರಹ ಬೇಕು. ಅವನ ಅನುಗ್ರಹದಿಂದ ಅವನನ್ನು ಒಲಿಸಿ ಅವನ ಪ್ರೀತಿಗೆ ಪಾತ್ರರಾದವರಿಗೆ ಆತ ಬಂಧು. ಯಾರು ಭಗವಂತನಿಗೆ ಬೆನ್ನು ಹಾಕಿ ಮುಂದೆ ಸಾಗಿದರೋ ಅವರು ಸದಾ ಭಗವಂತನಿಂದ ದೂರ ಸಾಗುತ್ತಾರೆ. ಆತನಿಗೆ ಬೆನ್ನುಹಾಕಿ ಆತನನ್ನು ದ್ವೇಷಿಸುವವರಿಗೆ ಆತ ಶತ್ರುವಂತೆ ಕಾಣುತ್ತಾನೆ. ಈ ಕಾರಣದಿಂದ ನಿರಂತರ ಭಗವಂತನನ್ನು ಪ್ರಾರ್ಥಿಸು. "ಬಂಧುವಾಗಿ ನನ್ನೊಳಗೆ ಬಂದು ನೆಲೆಸು, ನನ್ನನ್ನು ಒಳ್ಳೆಯ ದಾರಿಯಲ್ಲಿ ನಡೆಸು, ನನ್ನನ್ನು ನಿನ್ನತ್ತ ತಿರುಗಿಸಿ ಮುಂದೆ ಕರೆದುಕೊಂಡು ಹೋಗು" ಎನ್ನುವ ಪ್ರಾರ್ಥನೆ ಹಾಗೂ ಶರಣಾಗತಿ ನಮ್ಮ ಮನಸ್ಸು ಆತನಲ್ಲಿ ನೆಲೆಗೊಳ್ಳುವಂತೆ ಮಾಡುತ್ತದೆ. ಇದು ಧ್ಯಾನದ ಮೊದಲ ಮೆಟ್ಟಿಲು. ಹೀಗೆ ಮನಸ್ಸನ್ನು ಮಣಿಸಲು ಭಗವಂತನ ಅನುಗ್ರಹಪಡೆಯುವ ಪ್ರಯತ್ನ ಮಾಡಿದಾಗ ಏನಾಗುತ್ತದೆ ಎನ್ನುವುದನ್ನು ಮುಂದಿನ ಶ್ಲೋಕಗಳಲ್ಲಿ ನೋಡೋಣ.

ಜಿತಾತ್ಮನಃ ಪ್ರಶಾಂತಸ್ಯ ಪರಮಾತ್ಮಾ ಸಮಾಹಿತಃ ।
ಶೀತೋಷ್ಣಸುಖದುಃಖೇಷು ತಥಾ ಮಾನಾಪಮಾನಯೋಃ ॥೭॥

ಜ್ಞಾನವಿಜ್ಞಾನತೃಪ್ತಾತ್ಮಾ ಕೂಟಸ್ಥೋ ವಿಜಿತೇಂದ್ರಿಯಃ ।
ಯುಕ್ತ ಇತ್ಯುಚ್ಯತೇ ಯೋಗೀ ಸಮಲೋಷ್ಟಾಶ್ಮಕಾಂಚನಃ ॥೮॥

ಜಿತ ಆತ್ಮನಃ ಪ್ರಶಾಂತಸ್ಯ ಪರಮ ಆತ್ಮಾ ಸಮಾಹಿತಃ ।
ಶೀತ ಉಷ್ಣ ಸುಖ ದುಃಖೇಷು ತಥಾ ಮಾನ ಅಪಮಾನಯೋಃ ॥
ಜ್ಞಾನ ವಿಜ್ಞಾನ ತೃಪ್ತ ಆತ್ಮಾ ಕೂಟಸ್ಥಃ ವಿಜಿತ ಇಂದ್ರಿಯಃ
ಯುಕ್ತಃ ಇತಿ ಉಚ್ಯತೇ ಯೋಗೀ ಸಮಲೋಷ್ಟ ಅಶ್ಮ ಕಾಂಚನಃ -ಬಗೆಯನ್ನು[ಭಕ್ತಿಯಿಂದ ಭಗವಂತನನ್ನು] ಗೆಲಿದವನ, ವಿಷಯಗಳತ್ತ ಸುಳಿಯದೇ ಭಗವಂತನಲ್ಲೇ ನಲಿದವನ ಬಗೆಯಲ್ಲಿ ಭಗವಂತ ನೆಲೆಗೊಳ್ಳುತ್ತಾನೆ. ಅಂತವನು ತಂಪು-ಬಿಸಿ, ಸುಖ-ದುಃಖ ಮತ್ತು ಸಮ್ಮಾನ-ತಿರಸ್ಕಾರ ಇಂತಹ ದ್ವಂದ್ವಗಳಲ್ಲಿ ನಿರ್ವಿಕಾರನಾಗಿ ನಿಲ್ಲಬಲ್ಲವನು; ಭಗವಂತನ ಅರಿವು ಕಾಣ್ಕೆಗಳಿಂದ ಬಗೆದುಂಬಿದವನು; ಇಂದ್ರಿಯಗಳನ್ನು ಹಿಡಿತದಲ್ಲಿಟ್ಟವನು. ಅವನಿಗೆ ಮಣ್ಣು, ಕಲ್ಲು, ಚಿನ್ನ ಎಲ್ಲಾ ಒಂದೆ. ಇಂತಹ ಯೋಗ ಸಾಧಕನು ಗುರಿ ಸೇರಿದವನು ಎನಿಸುತ್ತಾನೆ.

ಭಕ್ತಿಯಿಂದ ಭಗವಂತನ ಅನುಗ್ರಹ ಪಡೆದಾಗ ಮೊದಲು ಮನಸ್ಸು ಆತನಲ್ಲಿ ನೆಲೆ ನಿಲ್ಲುತ್ತದೆ. ಮನಸ್ಸು ಎಂತಹ ಪ್ರಸಂಗದಲ್ಲೂ ಉದ್ವೇಗಕ್ಕೊಳಗಾಗುವುದಿಲ್ಲ. "ಪರಮಾತ್ಮಾ ಸಮಾಹಿತಃ" -ಭಗವಂತ ಅವನ ಹೃದಯದಲ್ಲಿ ಬಂದು ನೆಲೆಸಿ ಬಿಡುತ್ತಾನೆ. ನಾವು ಬಯಸಿದಾಗ ಆತನ ಅಂತಃದರ್ಶನ ಸಾಧ್ಯ. ಈ ರೀತಿ ಭಗವಂತನನ್ನು ಕಾಣುವವರ ಅಪರೋಕ್ಷ ಜ್ಞಾನದ ಪರಿಣಾಮ ಏನು ಎನ್ನುವುದನ್ನು ಇಲ್ಲಿ ಮತ್ತೊಮ್ಮೆ ವಿವರಿಸುತ್ತಾನೆ ಕೃಷ್ಣ.
ಮುಖ್ಯವಾಗಿ ಅಪರೋಕ್ಷ ಜ್ಞಾನಿಗಳಿಗೆ ಎಂದೂ ಇಂದ್ರಿಯ ಚಾಪಲ ಕಾಡುವುದಿಲ್ಲ. ಅಪಮಾನಕ್ಕೆ ಆತ ಎಂದೂ ಕುಸಿಯುವುದಿಲ್ಲ. ಮಾನಾಪಮಾನ ಆತನಿಗೆ ದೊಡ್ಡ ಸಂಗತಿ ಆಗುವುದಿಲ್ಲ. ಈ ಸ್ಥಿತಿ ತಲುಪಿದವ ಸಿದ್ಧ

ಎನಿಸುತ್ತಾನೆ. ಆತ ಎಷ್ಟು ನಿರ್ವಿಕಾರ ಎಂದರೆ ಆತ ಎಲ್ಲವನ್ನೂ ಸಮನಾಗಿ ಕಾಣಲಾರಂಭಿಸುತ್ತಾನೆ. ಧನ-ಕನಕ ಎಲ್ಲವೂ ಬೇಡವೆನಿಸಿ ಅದರಿಂದ ದೂರವಿರುತ್ತಾನೆ. (ರಾಮಕೃಷ್ಣ ಪರಮಹಂಸರ ಆತ್ಮಕಥೆಯನ್ನು ಓದಿದರೆ ಒಬ್ಬ ಅಪರೋಕ್ಷ ಜ್ಞಾನಿಯ ಮನಃಸ್ಥಿತಿ ನಮಗೆ ಅರ್ಥವಾಗುತ್ತದೆ).

ಮುಂದಿನ ಶ್ಲೋಕದಲ್ಲಿ ಕೃಷ್ಣ ಧ್ಯಾನಕ್ಕೆ ಪೂರ್ವಭಾವಿಯಾಗಿ ಒಬ್ಬ ಯೋಗಿಯ ಮನಃಸ್ಥಿತಿ ಹೇಗಿರಬೇಕು ಎನ್ನುವ ಬಹಳ ಮಹತ್ವವಾದ ವಿಚಾರವನ್ನು ವಿವರಿಸುತ್ತಾನೆ.

ಸುಹೃನ್ಮಿತ್ರಾರ್ಯುದಾಸೀನಮಧ್ಯಸ್ಥದ್ವೇಷ್ಯಬಂಧುಷು ।
ಸಾಧುಷ್ವಪಿ ಚ ಪಾಪೇಷು ಸಮಬುದ್ಧಿರ್ವಿಶಿಷ್ಯತೇ ॥೯॥

ಸುಹೃತ್ ಮಿತ್ರ ಅರಿ ಉದಾಸೀನ ಮಧ್ಯಸ್ಥ ದ್ವೇಷ್ಯ ಬಂದುಷು ।

ಸಾಧುಷು ಅಪಿ ಚ ಪಾಪೇಷು ಸಮಬುದ್ಧಿಃ ವಿಶಿಷ್ಯತೇ –ಹೇಳೆಯಿಲ್ಲದೇ ಹಚ್ಚಿಕೊಳ್ಳುವವರು, ಕಷ್ಟ ಕಾಲದಲ್ಲಿ ಎಚ್ಚರಿಸುವವರು, ಕಾಟಕೊಡುವವರು, ಒಳಿತು-ಕೆಡುಕು ಯಾವುದಕ್ಕೂ ಇಲ್ಲದವರು, ಎರಡಕ್ಕೂ ನಿಲ್ಲುವವರು, ಬೇಡವಾದದ್ದನ್ನು ಬಗೆವವರು, ನೆಂಟರು, ಒಳ್ಳೆಯವರು ಮತ್ತು ಕೆಟ್ಟವರು –ಎಲ್ಲರೂ ಮೂಲತಃ ಜ್ಞಾನ ಸ್ವರೂಪರು ಎಂದು ಸಮಭಾವದಿಂದ ಕಾಣುವವನು[ಎಲ್ಲರನ್ನೂ ಅವರವರ ಇರವಿಗೆ ತಕ್ಕಂತೆ ಗೌರವಿಸುವವನು] ಮಿಗಿಲಾದವನು.

ಮನಸ್ಸು ಸಮತೋಲನವಾಗದೇ ಧ್ಯಾನ ಮಾಡಲು ಸಾಧ್ಯವಿಲ್ಲ. ಯಾರ್ಯಾರ ಬಗ್ಗೆ ಯಾವುದ್ಯಾವುದೋ ವಿಚಾರಗಳು ಮನಸ್ಸಿನಲ್ಲಿ ಸುಳಿಯಲಾರಂಭಿಸಿದರೆ ಧ್ಯಾನ ಅಸಾಧ್ಯ. ಪ್ರಪಂಚದಲ್ಲಿ ಅನೇಕ ವಿಧದ ಜನರಿರುತ್ತಾರೆ. ಉದಾಹರಣೆಗೆ ಸುಹೃತರು-ಅಂದರೆ ಒಳ್ಳೆಯ ಹೃದಯ ಉಳ್ಳವರು. ಯಾವ ಪ್ರತ್ಯುಪಕಾರವನ್ನು ಬಯಸದೇ ಎಲ್ಲರಿಗೂ ಸಹಾಯ ಮಾಡುವ ಜನರಿವರು. ಇವರ ನಂತರ 'ಮಿತ್ರ'- ತನ್ನ ಆತ್ಮೀಯನಿಗೆ ಸದಾ ಸಹಾಯ ಮಾಡುವವ, ನಾವು ತಪ್ಪಿದಾಗ ನಮ್ಮನ್ನು ತಿದ್ದುವವನೀತ. ಅರಿಗಳು: ಕೊಲ್ಲುವ ಕೆಟ್ಟ ಶತ್ರುತ್ವ ಸಾಧಿಸುವ ಇವರಿಗೆ ದ್ವೇಷಿಸಲು ಕಾರಣ ಬೇಡ. ಉದಾಸೀನರು: ಇವರು ಒಳ್ಳೆಯದಕ್ಕೂ ಇಲ್ಲ ಕೆಟ್ಟದ್ದಕ್ಕೂ ಇಲ್ಲ. ಮಧ್ಯಸ್ಥ: ಒಳ್ಳೆಯದು ಮಾಡಿದಾಗ ಒಳ್ಳೆಯದು, ಕೆಟ್ಟದ್ದು ಮಾಡಿದಾಗ ಕೆಟ್ಟದ್ದು ಮಾಡುವವ. ದ್ವೇಷ್ಯ: ಒಬ್ಬರನ್ನು ಕಂಡು ಸಹಿಸದವ(hatred). ಕೊನೆಯದಾಗಿ ಬಂಧುಗಳು(Relatives).ಹೀಗೆ ಮಾನವ ಜನಾಂಗದಲ್ಲಿ ಒಳ್ಳೆಯವರು ಮತ್ತು ಕೆಟ್ಟವರು ತುಂಬಿರುತ್ತಾರೆ.(ದೇವತೆಗಳಲ್ಲಿ- ದಾನವರಲ್ಲಿ ಈ ರೀತಿಯ ಸಮ್ಮಿಶ್ರ ವರ್ಗಗಳಿಲ್ಲ. ದೇವತೆಗಳು ಕೇವಲ ಸಾಧುಗಳು, ಅಸುರರು ಸದಾ ಪಾಪಿಗಳು, ಆದರೆ ಮಾನವರಲ್ಲಿ ಮಾತ್ರ ಈ ಎರಡು ಗುಣಮಿಶ್ರಿತ ಗುಂಪುಗಳನ್ನು ಕಾಣಬಹುದು). ಧ್ಯಾನದಲ್ಲಿ ನಮಗೆ ಭಗವಂತನ ದರ್ಶನವಾಗಬೇಕಾದರೆ ಮೊದಲು ನಾವು ನಮ್ಮ ಅಂತರಂಗದಲ್ಲಿ ಈ ಎಲ್ಲಾ ರೀತಿಯ ಜನರ ಬಗ್ಗೆ ಸಮಬುದ್ಧಿಯನ್ನು ಬೆಳೆಸಿಕೊಳ್ಳಬೇಕು. ಒಬ್ಬ ವ್ಯಕ್ತಿಯ ನಡವಳಿಕೆ ಆತನು ಬೆಳೆದುಬಂದ ವಾತಾವರಣದಿಂದ ಅಥವಾ ತಿಳುವಳಿಕೆ ಇಲ್ಲದೇ ಇದ್ದುದರಿಂದ ಬಂದದ್ದು ಎಂದು ತಿಳಿದು ಅವನ ಬಗ್ಗೆ ಮನಸ್ಸಿನಲ್ಲಿ ಯಾವ ಕೆಟ್ಟ ಭಾವನೆಯೂ ಇರದಂತೆ ನೋಡಿಕೊಳ್ಳಬೇಕು. ಒಬ್ಬ ನಮ್ಮ ವೈರಿಯಂತೆ ನಮ್ಮನ್ನು ಕಾಡುತ್ತಿರಬಹುದು. ಇದಕ್ಕೆ ಕಾರಣ ಆತನ ಹಾಗೂ ನಮ್ಮ ಪ್ರಾರಾಬ್ಧ

ಕರ್ಮವಿರಬಹುದು. ದೇವರು ಈ ಜನ್ಮದಲ್ಲಿ ಅವನಿಗೆ ಕೊಟ್ಟ ಪಾತ್ರವನ್ನು ಆತ ನಿಭಾಯಿಸುತ್ತಿದ್ದಾನೆ ಎನ್ನುವ ಭಾವದಲ್ಲಿ ಅವನನ್ನು ನೋಡಿದಾಗ ನಮ್ಮಲ್ಲಿ ದ್ವೇಷ ಹುಟ್ಟುವುದಿಲ್ಲ. ಇನ್ನೊಬ್ಬರು ನಮ್ಮನ್ನು ಬೈದಾಗ ನಾವು ಉದ್ವೇಗಕ್ಕೊಳಗಾಗುವುದಿಲ್ಲ. "ಭಗವಂತ ಅವನಿಗೆ ಕೊಟ್ಟ ಪಾತ್ರವನ್ನು ಅದೆಷ್ಟು ಚೆನ್ನಾಗಿ ನಿಭಾಯಿಸುತ್ತಿದ್ದಾನೆ" ಎನ್ನುವ ಭಾವ ನಮ್ಮಲ್ಲಿ ಮೂಡಬೇಕು. ಸಂಬಂಧಿಕರಿರಲಿ, ಶತ್ರುಗಳಿರಲಿ, ಯಾರೇ ಇರಲಿ. ಧ್ಯಾನ ಸಮಯದಲ್ಲಿ ಮನಸ್ಸಿನಲ್ಲಿ ಶುದ್ಧವಾದ ಸಮಭಾವ ನೆಲೆಗೊಂಡಿರಬೇಕು. ಈ ಸ್ಥಿತಿಯಲ್ಲಿ ಧ್ಯಾನಕ್ಕೆ ಕುಳಿತಾಗ ಇವರ್ಯಾರೂ ಎದುರಿಗೆ ಬರದೆ ಆ ಭಗವಂತನ ದರ್ಶನವಾಗುತ್ತದೆ. ಇಲ್ಲಿ ಒಂದು ಎಚ್ಚರದ ವಿಷಯ ಎಂದರೆ ಅಂತರಂಗದ ಸಮಭಾವವನ್ನು ವ್ಯವಹಾರಿಕವಾಗಿ ಹೊರ ಪ್ರಪಂಚದಲ್ಲಿ ಅಳವಡಿಸಲು ಬರುವುದಿಲ್ಲ. ವ್ಯವಹಾರಿಕವಾಗಿ ನಾವು ಹಿಂದೆ ಹೇಳಿದ ಮೈತ್ರಿ, ಕರುಣಾ, ಮುದಿತ ಮತ್ತು ಉಪೇಕ್ಷ ಎನ್ನುವ ನಾಲ್ಕು ಮನೋವೃತ್ತಿಯನ್ನು ಬೆಳೆಸಿಕೊಳ್ಳಬೇಕು. ಎಲ್ಲರನ್ನೂ ಸಮಾನವಾಗಿ ಕಾಣುವುದು ಅಂದರೆ ಅವರವರನ್ನು ಆಯಾ ಸ್ಥಾನದಲ್ಲಿ ನೋಡುವುದು ವ್ಯಾವಹಾರಿಕ ಪ್ರಪಂಚದ ಸಮದೃಷ್ಟಿ. ತಂದೆಯನ್ನು ತಂದೆಯಂತೆ, ಮಗನನ್ನು ಮಗನಂತೆ ಕಂಡು ನಡೆಯುವುದು, ದುಷ್ಟರಿಂದ ದೂರವಿರುವುದು(ಉಪೇಕ್ಷ) ವ್ಯಾವಹಾರಿಕ ಪ್ರಪಂಚ. ಅಂತರಂಗ ಪ್ರಪಂಚದಲ್ಲಿ ನಾವು ಎಲ್ಲರಲ್ಲೂ ಆತನ ಒಳಗಿರುವ ಭಗವಂತನನ್ನು ಮಾತ್ರ ಕಾಣಬೇಕು. ಇದು ಧ್ಯಾನಕ್ಕೆ ಬೇಕಾದ ಪೂರ್ವಭಾವಿ ಮನಃಸ್ಥಿತಿ. ಮಾನಸಿಕವಾಗಿ ಎಲ್ಲಾ ಸಂಬಂಧದ ನಂಟನ್ನು ಕಳಚಿ ಧ್ಯಾನಕ್ಕೆ ಕುಳಿತುಕೊಳ್ಳಬೇಕು. ಧ್ಯಾನದಲ್ಲಿ ತಂದೆ, ತಾಯಿ, ಗುರು, ಶಿಷ್ಯ, ವೈರಿ, ಮಿತ್ರ ಇತ್ಯಾದಿ ವರ್ಗಗಳಿಲ್ಲ. ಎಲ್ಲವೂ ಒಂದೇ, ಅದು ಕೇವಲ ಜ್ಞಾನಸ್ವರೂಪವಾದ ಜೀವ- ಅದರೊಳಗೆ ಬಿಂಬ ರೂಪಿ ಭಗವಂತ. ಇದು ಧ್ಯಾನಕ್ಕೆ ಬೇಕಾದ ಮಾನಸಿಕ ಸ್ಥಿತಿ.

ಹೀಗೆ ಧ್ಯಾನಕ್ಕೆ ಬೇಕಾದ ಪೂರ್ವ ಸಿದ್ಧತೆಯನ್ನು ವಿವರಿಸಿದ ಕೃಷ್ಣ ಮುಂದೆ ನೇರವಾಗಿ ಧ್ಯಾನಕ್ಕೆ ಕೂರುವ ವಿಧಾನವನ್ನು ವಿವರಿಸುತ್ತಾನೆ.

ಯೋಗೀ ಯುಂಜೀತ ಸತತಮಾತ್ಮಾನಂ ರಹಸಿ ಸ್ಥಿತಃ ।
ಏಕಾಕೀ ಯತಚಿತ್ತಾತ್ಮಾ ನಿರಾಶೀರಪರಿಗ್ರಹಃ ॥೧೦॥

ಯೋಗೀ ಯುಂಜೀತ ಸತತಮ್ ಆತ್ಮಾನಮ್ ರಹಸಿ ಸ್ಥಿತಃ ।
ಏಕಾಕೀ ಯತ ಚಿತ್ತ ಆತ್ಮಾ ನಿರಾಶೀಃ ಅಪರಿಗ್ರಹಃ -ಯೋಗ ಸಾಧಕನು ಒಬ್ಬನೇ ಏಕಾಂತದಲ್ಲಿ ಕುಳಿತು, ಮೈಮನಗಳನ್ನು ಹದಗೊಳಿಸಿ, ಆಸೆಪಡದೆ, ಏತಕ್ಕೂ ಕೈಯೊಡ್ಡದೆ, ಬಗೆಯನ್ನು ಸದಾ ಸಮಾಧಿಗೆ ಅಣಿಗೊಳಿಸಬೇಕು.

ಧ್ಯಾನ ಮಾರ್ಗದಲ್ಲಿ ಸಾಧನೆ ಮಾಡತಕ್ಕಂತಹ ವ್ಯಕ್ತಿ ಮನಸ್ಸನ್ನು ನಿರಂತರ ಧ್ಯಾನ ಯೋಗದಲ್ಲಿ ತೊಡಗಿಸಲು ಹಾಗೂ ಏಕಾಗ್ರಗೊಳಿಸಲು ಪ್ರಯತ್ನಪಡಬೇಕು. ಜನಜಂಗುಳಿ ಇದ್ದಲ್ಲಿ ಧ್ಯಾನ ಅಭ್ಯಾಸ ಮಾಡಲು ಅಸಾಧ್ಯ. ಈ ಕಾರಣಕ್ಕಾಗಿ ಹಿಂದಿನವರು ಧ್ಯಾನಕ್ಕಾಗಿ ಬೆಳಗಿನ ಜಾವದ ಅರುಣೋದಯ ಕಾಲವನ್ನು ಮೀಸಲಿಡುತ್ತಿದ್ದರು.

ಬೆಳಗಿನಜಾವ ಸೂರ್ಯೋದಯಕ್ಕಿಂತ ತೊಂಬತ್ತಾರು ನಿಮಿಷ ಮೊದಲು ಧ್ಯಾನಕ್ಕೆ ಕುಳಿತರೆ ಆಗ ಇಡೀ ಪ್ರಕೃತಿ ಪ್ರಶಾಂತವಾಗಿರುತ್ತದೆ. ಈ ಕಾಲ ಮನಸ್ಸನ್ನು ಏಕಾಗ್ರತೆಗೆ ಕೊಂಡೊಯ್ಯಲು ಅತ್ಯಂತ ಪೂರಕ ಕಾಲ. ಇದನ್ನು 'ಬ್ರಹ್ಮಮುಹೂರ್ತ' ಎನ್ನುತ್ತಾರೆ [ಸೂರ್ಯೋದಯಕ್ಕಿಂತ ತೊಬತ್ತಾರು ನಿಮಿಷ(ನಾಲ್ಕು ಘಳಿಗೆ) ಮೊದಲು ಪ್ರಾರಂಭವಾಗಿ ನಲವತ್ತೆಂಟು ನಿಮಿಷಗಳ ಕಾಲ(ಎರಡು ಘಳಿಗೆ) ಬ್ರಹ್ಮಮುಹೂರ್ತ. ಉದಾಹರಣೆಗೆ ಸೂರ್ಯೋದಯ 5:44ಕ್ಕೆ ಆದರೆ 4:08 ರಿಂದ 4:56 ರ ತನಕ ಬ್ರಹ್ಮಮುಹೂರ್ತ]. ಈ ಮುಹೂರ್ತದ ದೇವತೆ ಚತುರ್ಮುಖ ಬ್ರಹ್ಮ. ಈತನೇ ನಮ್ಮ ಚಿತ್ತದ ದೇವತೆ. ಆದ್ದರಿಂದ ಈ ಕಾಲ ಜಪ ಸ್ಮರಣೆ ಮತ್ತು ಧ್ಯಾನಕ್ಕೆ ಅತ್ಯಂತ ಶ್ರೇಷ್ಠವಾದ ಸಮಯ. ಧ್ಯಾನ ಎನ್ನುವುದು ಅತ್ಯಂತ ಅಂತರಂಗದ ಕ್ರಿಯೆ. ಇಲ್ಲಿ ಕೇವಲ ಭಗವಂತ ಮತ್ತು ಸಾಧಕ ಜೀವ ಮಾತ್ರ ಇರಬೇಕು. ಮೂರನೇ ಸಂಗಾತಿ ಬಂದರೆ ತೊಂದರೆಯಾಗುತ್ತದೆ. ಒಬ್ಬ ಕಲುಷಿತ ಮನಸ್ಸಿನ(polluted mind) ವ್ಯಕ್ತಿಯಿಂದ ಆತನ ಸುತ್ತಲಿನ ವಾತಾವರಣ ಕೆಡುತ್ತದೆ. ಅದಕ್ಕಾಗಿ ಧ್ಯಾನ ಅಭ್ಯಾಸ ಮಾಡುವಾಗ ಯಾವಾಗಲೂ ಏಕಾಂತವಾಗಿ ಅಭ್ಯಾಸ ಮಾಡಬೇಕು. ನಮ್ಮ ಚಿತ್ತ ಮತ್ತು ಮನಸ್ಸನ್ನು ನಿಯಂತ್ರಣದಲ್ಲಿಟ್ಟು, ಯಾವುದೇ ಆಸೆ ಆಕಾಂಕ್ಷೆ ಮನಸ್ಸಿಗೆ ಸುಳಿಯದಂತೆ, ತೃಪ್ತ ಮನಸ್ಸಿನಿಂದ ಧ್ಯಾನಕ್ಕೆ ಅಣಿಯಾಗಬೇಕು.

ಮುಂದಿನ ಶ್ಲೋಕದಲ್ಲಿ ಧ್ಯಾನಕ್ಕೆ ಕೂರುವ ಸ್ಥಳ ಹೇಗಿರಬೇಕು ಮತ್ತು ಹೇಗೆ ಕುಳಿತುಕೊಳ್ಳಬೇಕು ಎನ್ನುವುದನ್ನು ಕೃಷ್ಣ ವಿವರಿಸುತ್ತಾನೆ.

ಶುಚೌ ದೇಶೇ ಪ್ರತಿಷ್ಠಾಪ್ಯ ಸ್ಥಿರಮಾಸನಮಾತ್ಮನಃ ।
ನಾತ್ಯುಚ್ಛ್ರಿತಂ ನಾತಿನೀಚಂ ಚೇಲಾಜಿನಕುಶೋತ್ತರಮ್ ॥೧೧॥

ತತ್ರೈಕಾಗ್ರಂ ಮನಃ ಕೃತ್ವಾ ಯತಚಿತ್ತೇಂದ್ರಿಯಕ್ರಿಯಃ ।
ಉಪವಿಶ್ಯಾಽಸನೇ ಯುಂಜ್ಯಾದ್ ಯೋಗ ಮಾತ್ಮವಿಶುದ್ಧಯೇ ॥೧೨॥

ಶುಚೌ ದೇಶೇ ಪ್ರತಿಷ್ಠಾಪ್ಯ ಸ್ಥಿರಮ್ ಆಸನಮ್ ಆತ್ಮನಃ ।
ನ ಅತಿ ಉಚ್ಛ್ರಿತಮ್ ನ ಅತಿ ನೀಚಮ್ ಚೇಲ ಅಜಿನ ಕುಶ ಉತ್ತರಮ್
ತತ್ರ ಏಕ ಅಗ್ರಮ್ ಮನಃ ಕೃತ್ವಾ ಯತಚಿತ್ತ ಇಂದ್ರಿಯ ಕ್ರಿಯಃ ।
ಉಪವಿಶ್ಯ ಆಸನೇ ಯುಂಜ್ಯಾತ್ ಯೋಗಮ್ ಆತ್ಮ ವಿಶುದ್ಧಯೇ –ನಿರ್ಮಲವಾದ ತಾಣದಲ್ಲಿ, ಹುಲ್ಲ(ದರ್ಬೆ) ಚಾಪೆ-ಜಿಂಕೆಯ ತೊಗಲ ಮೇಲೆ ಬಟ್ಟೆ ಹಾಸಿ, ತುಂಬಾ ಎತ್ತರವೂ ಅಲ್ಲದ, ತೀರಾ ತಗ್ಗೂ ಅಲ್ಲದ, ನಲುಗದ ಆಸನವನ್ನು ತನಗಾಗಿ ಅಣಿಗೊಳಿಸಬೇಕು. ಅದರಲ್ಲಿ ಕುಳಿತು, ಬಗೆಯನ್ನು ನೆಟ್ಟ ಗುರಿಯಲ್ಲಿರಿಸಿ, ಇಂದ್ರಿಯಗಳ ಮತ್ತು ಒಳಬಗೆಯ ಚೆಲ್ಲಾಟವನ್ನು ನಿಲ್ಲಿಸಿ, ಆತ್ಮ ಶುದ್ಧಿಗಾಗಿ ಸಮಾಧಿಯನ್ನು ಸಾಧಿಸಬೇಕು.

ಧ್ಯಾನಕ್ಕೆ ಕೂರುವ ಪ್ರದೇಶ ಸ್ವಚ್ಛವಾಗಿರಬೇಕು. ಮನೆಯಲ್ಲಿ ಸಾತ್ವಿಕ ಕಂಪನ(Vibration)ವಿರುವ ಸ್ಥಳವನ್ನು ಧ್ಯಾನಕ್ಕೆ ಆರಿಸಿಕೊಳ್ಳಬೇಕು. ಹಿಂದೆ ಮನೆಯಲ್ಲಿ ಹೆಚ್ಚು ಸಾತ್ವಿಕ ಕಂಪನವಿರುವ ಸ್ಥಳವನ್ನು ಗುರುತಿಸಿ ಅಲ್ಲಿ ದೇವರಮನೆಯನ್ನು ನಿರ್ಮಿಸುತ್ತಿದ್ದರು. ದುರಾದೃಷ್ಟಾವಶಾತ್ ಇಂದು ಮನೆ ಕಟ್ಟುವಾಗ ಎಲ್ಲಿ ಜಾಗ ಉಳಿದಿರುತ್ತದೋ ಅದನ್ನು ದೇವರಮನೆಯಾಗಿ ಪರಿವರ್ತಿಸುತ್ತಿದ್ದೇವೆ. ನಾವು ಮನೆಯಲ್ಲಿ ಯಾವ ಭಾಗದಲ್ಲಿ ಕುಳಿತಾಗ ನಮಗೆ ಮನಸ್ಸು ಪ್ರಸನ್ನವಾಗಿ ದೇವರ ಧ್ಯಾನಕ್ಕೆ ಪೂರಕವಾಗಿರುತ್ತದೋ ಅಲ್ಲಿ ಸಾತ್ವಿಕ ಕಂಪನ ಹೆಚ್ಚಾಗಿದೆ ಎಂದು ನಾವು ಸುಲಭವಾಗಿ ಕಂಡು ಹಿಡಿಯಬಹುದು. ಇದನ್ನೇ ಇಲ್ಲಿ "ಶುಚಿ ದೇಶ" ಎಂದಿದ್ದಾರೆ.

ನಾವು ಸಾತ್ವಿಕ ಕಂಪನವಿರುವ ಸ್ಥಳವನ್ನು ಗುರುತಿಸಿದರೆ ಸಾಲದು; ಅಲ್ಲಿ ಎಷ್ಟು ಒಳ್ಳೆಯ ಸಾತ್ವಿಕ ಕಂಪನವಿದ್ದರೂ ನಾವು ನೆಲದಲ್ಲಿ ಕುಳಿತರೆ ನೆಲದಲ್ಲಿರುವ ಕೆಟ್ಟ ಕಂಪನ ನಮ್ಮ ದೇಹವನ್ನು ಪ್ರವೇಶಿಸಬಹುದು. ಅದಕ್ಕಾಗಿ ನಾವು ಕುಳಿತುಕೊಳ್ಳುವ ಆಸನ ವ್ಯವಸ್ಥೆ ಸರಿಯಾಗಿರಬೇಕು. ಸ್ಥಿರವಾದ ಆಸನ ಅತೀ ಮುಖ್ಯ. ಇದಕ್ಕಾಗಿ ಸೋಫಾದಂತಹ ಕುಶನ್ ಇರುವ ಆಸನವನ್ನು ಉಪಯೋಗಿಸಬಾರದು. ಇಲ್ಲಿ ಕೃಷ್ಣ ಯಾವ ರೀತಿಯ ಆಸನ ಯೋಗ್ಯ ಎನ್ನುವುದನ್ನು ವಿವರಿಸಿದ್ದಾನೆ. ನಾವು ಕುಳಿತುಕೊಳ್ಳುವ ಆಸನ ಬಹಳ ತಗ್ಗಾಗಿ ಇರಬಾರದು, ಬಹಳ ಎತ್ತರದಲ್ಲಿಯೂ ಇರಬಾರದು. ಕುಳಿತುಕೊಳ್ಳುವ ಸ್ಥಳದಲ್ಲಿ ಮೊದಲು ದರ್ಬೆಯ ಚಾಪೆಯನ್ನು ಹಾಸಬೇಕು. ಅದರ ಮೇಲೆ ಕೃಷ್ಣಾಜಿನವನ್ನು(ಸಂಸಾರಿಗಳು) ಅಥವಾ ವ್ಯಾಘ್ರಾಜಿನ(ಸಂಸಾರವನ್ನು ತ್ಯಜಿಸಿದ-ನೈಷ್ಠಿಕ ಬ್ರಹ್ಮಚಾರಿಗಳು)ವನ್ನು ಹಾಸಬೇಕು. ಅದರ ಮೇಲೆ ಬಟ್ಟೆ (ರೇಷ್ಮೆಯ ಪಟ್ಟೆ ಅಥವಾ ದಾವಳಿ). ಇದು ಧ್ಯಾನಕ್ಕೆ ಅತ್ಯಂತ ಶ್ರೇಷ್ಠ ಆಸನ.

ಇಲ್ಲಿ ದರ್ಬೆಯ ಚಾಪೆಯನ್ನು ಉಪಯೋಗಿಸಲು ಹೇಳಿದ್ದಾರೆ. ಮೇಲ್ನೋಟಕ್ಕೆ ದರ್ಬೆ ವ್ಯರ್ಥವಾಗಿ ಬೆಳೆಯುವ ಹುಲ್ಲು; ಆದರೆ ವಾತಾವರಣದಲ್ಲಿರುವ ದುಷ್ಟಶಕ್ತಿಯನ್ನು ನಿಯಂತ್ರಿಸುವ ಅಮೋಘ ಶಕ್ತಿ ದರ್ಬೆಗಿದೆ. ಅದಕ್ಕಾಗಿ ಯಜ್ಞ-ಯಾಗದಿಗಳಲ್ಲಿ ದರ್ಬೆಯನ್ನು ಉಂಗುರವಾಗಿ ಧರಿಸುತ್ತಾರೆ ಹಾಗೂ ದುಷ್ಟ ಶಕ್ತಿ ನಿಯಂತ್ರಕವಾಗಿ ಯಜ್ಞಕುಂಡದ ಸುತ್ತಲೂ ದರ್ಬೆಯನ್ನು ಇಡುತ್ತಾರೆ. ಧ್ಯಾನ ಕಾಲದಲ್ಲಿ ಯಾವುದೇ ದುಷ್ಟಶಕ್ತಿಗಳು ನಮಗೆ ತೊಂದರೆ ಕೊಡದಂತೆ ಇಲ್ಲಿ ದರ್ಬೆಯ ಚಾಪೆ ನಮಗೆ ಸಹಾಯ ಮಾಡುತ್ತದೆ. ಕೃಷ್ಣಾಜಿನ ಹಾಗೂ ಪಟ್ಟೆ ಮಹತ್ತಾದ ಸಾತ್ವಿಕ ಕಂಪನವನ್ನು ನಮಗೊದಗಿಸುತ್ತದೆ. ಇದು ನೆಲದಿಂದ ನಮ್ಮ ದೇಹಕ್ಕೆ ಕೆಟ್ಟ ಕಂಪನ ಪ್ರವೇಶಿಸದಂತೆ ತಡೆಯುತ್ತದೆ. ನಮ್ಮಲ್ಲಿ ಕೆಲವರು ಮರದ ಮಣೆಯನ್ನು ಉಪಯೋಗಿಸುತ್ತಾರೆ. ಆದರೆ ಮಣೆಯಲ್ಲಿ ಕುಳಿತಾಗ ನಮ್ಮ ದೇಹದ ಕೆಲವು ಭಾಗ ನೆಲವನ್ನು ಸ್ಪರ್ಶಿಸುವ ಸಾಧ್ಯತೆ ಇದೆ. ಅದಕ್ಕಾಗಿ ಕೃಷ್ಣ ಹೇಳಿದ ಈ ಮೇಲಿನ ಆಸನ ಬಹಳ ಸೂಕ್ತ. ಈ ರೀತಿಯ ಆಸನವನ್ನು ತಯಾರಿಸಿಕೊಂಡು ನಮಗೆ ಸಾಧ್ಯವಾದ ಭಂಗಿ(Posture)ಯಲ್ಲಿ ನೆಟ್ಟಗೆ ಕುಳಿತುಕೊಳ್ಳಬೇಕು. ನಮಗೆ ಸಾಧ್ಯವಾಗದ ಆಸನದಲ್ಲಿ ಬಲವಂತವಾಗಿ ಕೂರುವುದು ಧ್ಯಾನಕ್ಕೆ ಪೂರಕವಲ್ಲ. ಸಾಮಾನ್ಯವಾಗಿ ವಜ್ರಾಸನ ಬಹಳ ಪ್ರಸಿದ್ಧ. ಈ ಆಸನದಲ್ಲಿ ನಮ್ಮ ದೇಹ ನೆಟ್ಟಗಿರುತ್ತದೆ ಹಾಗೂ ಇದು ಧ್ಯಾನಕ್ಕೆ ಪೂರಕ. ಈ ಬಗ್ಗೆ ಮುಂದೆ ವಿವರವಾಗಿ ಕೃಷ್ಣ ವಿವರಿಸುತ್ತಾನೆ.

ಮೇಲೆ ಹೇಳಿದ ರೀತಿ ಆಸನವನ್ನು ಸಿದ್ಧ ಪಡಿಸಿಕೊಂಡು ಕುಳಿತ ತಕ್ಷಣ ಧ್ಯಾನ ಸಾಧ್ಯವಾಗುವುದಿಲ್ಲ. ಆಸನದ ಮೇಲೆ ಸೂಕ್ತ ಭಂಗಿಯಲ್ಲಿ ಕೂತು ಮನಸ್ಸನ್ನು ಭಗವಂತನ ಕಡೆಗೆ ಏಕಾಗ್ರ ಮಾಡಬೇಕು. 'ಏಕಾಗ್ರ' ಎನ್ನುವ ಪದಕ್ಕೆ ಎರಡು ಅರ್ಥವಿದೆ. ಏಕ+ಅಗ್ರ-ಬಾಣದಂತೆ ಒಂದೇ ಗುರಿ. ಯಾವುದಕ್ಕೆ ಗುರಿ ಇಡುವುದು ಎಂದರೆ ಅದಕ್ಕೆ

ಇದೇ ಪದದಲ್ಲಿ ಉತ್ತರವಿದೆ. 'ಏಷ ಏವ ಕರೋತೀತಿ ಏಕಾಗ್ರಹಃ'-ಯಾರೊಬ್ಬನು ಈ ಜಗತ್ತಿನ ಸೃಷ್ಟಿ-ಸ್ಥಿತಿ-ಸಂಹಾರ-ನಿಯಮನ-ಜ್ಞಾನಾಜ್ಞಾನ-ಬಂಧ-ಮೋಕ್ಷಗಳಿಗೆ ಕಾರಣನೋ ಅವನಲ್ಲಿ ಮನಸ್ಸನ್ನು ನೆಲೆಗೊಳಿಸುವುದು ಏಕಾಗ್ರ. ಬಾಲ್ಯದಿಂದ ಬೆಳೆಸಿಕೊಂಡು ಬಂದ ಅಭ್ಯಾಸವನ್ನು ಬಿಟ್ಟು ಹೊಸ ಅಭ್ಯಾಸಕ್ಕೆ ತನ್ನನ್ನು ತಾನು ಅಣಿಗೊಳಿಸಬೇಕಾದರೆ ಮನಸ್ಸಿಗೆ ಬಹಳ ಸಮಯ ಬೇಕಾಗುತ್ತದೆ. ಹೀಗಾಗಿ ಧ್ಯಾನಕ್ಕೆ ಕೂತ ತಕ್ಷಣ ಮನಸ್ಸು ಏಕಾಗ್ರವಾಗಲಿಲ್ಲ ಎಂದು ಯಾರೂ ಗಾಬರಿಯಾಗುವುದು ಬೇಡ. ನಿರಂತರ ಪ್ರಯತ್ನವನ್ನು ಎಂದೂ ಕೈಬಿಡದೆ ಛಲದಿಂದ ಸಾಧನೆ ಮಾಡಿದಾಗ ಏಕಾಗ್ರತೆ ಸಾಧ್ಯ.

ಮನಸ್ಸು ಏಕಾಗ್ರವಾದ ನಂತರ 'ಯತಚಿತ್ತ ಇಂದ್ರಿಯ ಕ್ರಿಯಃ' – ಎಲ್ಲಾ ಬಾಹ್ಯಇಂದ್ರಿಯ ಕ್ರಿಯೆಯನ್ನು ಸಂಪೂರ್ಣ ಸ್ಥಬ್ಧಗೊಳಿಸಬೇಕು. ಅಂದರೆ ಈ ಸ್ಥಿತಿಯಲ್ಲಿ ಹೊರಗಿನ ಶಬ್ದ ನಮಗೆ ಕೇಳಿಸದು, ಬಾಹ್ಯ ಕಂಪು ಮೂಗಿಗೆ ಬಡಿಯದು. ಒಂದು ವೇಳೆ ಒಂದು ಸೊಳ್ಳೆ ಕಚ್ಚಿದರೂ ಆ ನೋವಿನ ಅರಿವು ನಮಗಾಗುವುದಿಲ್ಲ. ಇದು ನಿದ್ದೆಯಂತೆ; ನಿದ್ದೆಯಲ್ಲಿ ನಮಗೆ ಅಂತರಂಗ ಪ್ರಪಂಚ ಎಚ್ಚರವಿರುವುದಿಲ್ಲ, ಆದರೆ ಧ್ಯಾನದಲ್ಲಿ ಅಂತರಂಗ ಪ್ರಪಂಚ ಎಚ್ಚರವಿರುತ್ತದೆ. ಹೀಗೆ ಬಾಹ್ಯೇಂದ್ರಿಯ ಕ್ರಿಯೆಯನ್ನು ಸ್ಥಬ್ಧಗೊಳಿಸಿ ನಂತರ ಚಿತ್ತವನ್ನು ನಿಯಂತ್ರಿಸಬೇಕು. ನಮ್ಮ ಚಿತ್ತದಲ್ಲಿ ಅದೆಷ್ಟು ವಿಚಾರ ಸಂಗ್ರಹವಾಗಿರುತ್ತದೆ. ಆದರೆ ಹಿಂದೆ ದಾಖಲಿಸಿರುವ ಎಲ್ಲಾ ವಿಷಯಗಳನ್ನು ಬಿಟ್ಟು ಕೇವಲ ಭಗವಂತನ ಗುಣದ ಅಂಶವನ್ನು ಮಾತ್ರ ಧ್ಯಾನ ಮಾಡಬೇಕು.

ಹೀಗೆ ನಮ್ಮ ಮನಸ್ಸು ಚಿತ್ತವನ್ನು ನಿಯಂತ್ರಿಸಲು ಜನ್ಮ ಜನ್ಮಾಂತರದ ಸಾಧನೆ ಬೇಕು. ಕೆಲವರು ಈ ಸಾಧನೆಯಲ್ಲಿ ನಿರಂತರ ಪ್ರಯತ್ನ ಮಾಡಿ ಯಾವುದೇ ಸಿದ್ಧಿಫಲಿಸದೇ ನಿರಾಶರಾಗುವುದಿದೆ. ಆದರೆ ಹಿಂದೆ ಹೇಳಿದಂತೆ ನಾವು ಅಧ್ಯಾತ್ಮದಲ್ಲಿ ಇಡುವ ಒಂದು ತೊದಲು ಹೆಜ್ಜೆ ಕೂಡಾ ವ್ಯರ್ಥವಲ್ಲ. ಈ ಜನ್ಮದಲ್ಲಿ ಸಿದ್ಧಿ ಸಾಧ್ಯವಾಗದೇ ಇದ್ದರೆ, ಖಂಡಿತ ಮುಂದಿನ ಜನ್ಮದಲ್ಲಿ ನಮ್ಮ ಸಾಧನೆ ಈ ಜನ್ಮದಲ್ಲಿ ಎಲ್ಲಿ ನಿಂತಿತ್ತೋ ಅಲ್ಲಿಂದಲೇ ಆರಂಭವಾಗುತ್ತದೆ(ಈ ಬಗ್ಗೆ ವಿವರವಾಗಿ ಮುಂದೆ ಕೃಷ್ಣ ವಿವರಿಸುತ್ತಾನೆ). ಆದ್ದರಿಂದ ಎಂದೂ ನಿರಾಶೆ ಬೇಡ, ಪ್ರಯತ್ನ ಮಾತ್ರ ನಿರಂತರವಾಗಿರಲಿ.

ಹೀಗೆ ನಮ್ಮ ಮನಸ್ಸು ಮತ್ತು ಚಿತ್ತ ನಿಯಂತ್ರಣಕ್ಕೆ ಬಂದ ಮೇಲೆ ನಾವು ಅದನ್ನು ಅದೇ ಸ್ಥಿತಿಯಲ್ಲಿ ಹಿಡಿದಿಟ್ಟುಕೊಳ್ಳಬೇಕು(ಯುಂಜ್ಯಾದ್ ಯೋಗಮ್). ಈ ಸ್ಥಿತಿಯಲ್ಲಿ ನಮ್ಮ ಜ್ಞಾನಾನಂದಮಯವಾದ ಆತ್ಮಕ್ಕೆ ಹಿಡಿದ ಕೊಳೆ ತೊಳೆದುಹೋಗಿ ಆತ್ಮಶುದ್ಧಿಯಾಗುತ್ತದೆ. ಇಂತಹ ಶುದ್ಧವಾದ ಆತ್ಮದಿಂದ ಪವಿತ್ರನಾದ ಭಗವಂತನನ್ನು ಕಾಣಲು ಸಾಧ್ಯ.

ಮುಂದಿನ ಶ್ಲೋಕದಲ್ಲಿ ಕೃಷ್ಣ ಧ್ಯಾನ ಭಂಗಿ(ಕುಳಿತುಕೊಳ್ಳುವ ರೀತಿ)ಯ ಬಗ್ಗೆ ಇನ್ನೂ ಸ್ಪಷ್ಟವಾದ ಚಿತ್ರಣವನ್ನು ಕೊಡುತ್ತಾನೆ.

ಸಮಂ ಕಾಯಶಿರೋಗ್ರೀವಂ ಧಾರಯನ್ನಚಲಂ ಸ್ಥಿರಃ ।
ಸಂಪ್ರೇಕ್ಷ್ಯ ನಾಸಿಕಾಗ್ರಂ ಸ್ವಂ ದಿಶಶ್ಚಾನವಲೋಕಯನ್ ॥೧೩॥

ಪ್ರಶಾಂತಾತ್ಮಾ ವಿಗತಭೀರ್ಬ್ರಹ್ಮಚಾರಿವ್ರತೇ ಸ್ಥಿತಃ ।

ಮನಃ ಸಂಯಮ್ಯ ಮಚ್ಚಿತ್ತೋ ಯುಕ್ತ ಆಸೀತ ಮತ್ಪರಃ ॥೧೪॥

ಸಮಮ್ ಕಾಯ ಶಿರಃ ಗ್ರೀವಮ್ ಧಾರಯನ್ ಅಚಲಮ್ ಸ್ಥಿರಃ ।
ಸಂಪ್ರೇಕ್ಷ್ಯ ನಾಸಿಕಾ ಅಗ್ರಮ್ ಸ್ವಮ್ ದಿಶಃ ಚ ಅನವಲೋಕಯನ್ ॥
ಪ್ರಶಾಂತ ಆತ್ಮಾ ವಿಗತ ಭೀಃ ಬ್ರಹ್ಮಚಾರಿವ್ರತೇ ಸ್ಥಿತಃ ।
ಮನಃ ಸಂಯಮ್ಯ ಮತ್ ಚಿತ್ತಃ ಯುಕ್ತಃ ಆಸೀತ ಮತ್ ಪರಃ -- ಬೆನ್ನು-ತಲೆ-ಕತ್ತನ್ನು ನೆಟ್ಟಗೆ ನಿಲ್ಲಿಸಿ, ನಲುಗದೇ ಗಟ್ಟಿಯಾಗಿ ಕುಳಿತು, ಅತ್ತಿತ್ತ ನೋಡದೇ ತನ್ನ ಮೂಗಿನ ತುದಿಯಲ್ಲೇ ನೋಟವಿಟ್ಟು, ಬಗೆಯನ್ನು ವಿಷಯಗಳತ್ತ ಹರಿಯಗೊಡದೆ ಹದಗೊಳಿಸಿ, ಅಂಜದೆ, ಬ್ರಹ್ಮಚರ್ಯದಲ್ಲಿದ್ದು, ನನ್ನನ್ನೇ ಪರದೈವವೆಂದು ನಂಬಿ, ನನ್ನನ್ನೇ ನೆನೆಯುತ್ತಾ ಸಮಾಧಿಯನ್ನು ಸಾಧಿಸಬೇಕು.

ಧ್ಯಾನಕ್ಕೆ ಕುಳಿತಾಗ ಸೊಂಟದಿಂದ ಮೇಲಿನ ನಮ್ಮ ಶರೀರ ನೆಟ್ಟಗೆ ಸರಳರೇಖೆಯಲ್ಲಿರಬೇಕು. ಬೆನ್ನು ಬಗ್ಗಿರಕೂಡಾದು, ಕುತ್ತಿಗೆ, ತಲೆ ವಾಲಿರಬಾರದು. ದೇಹವನ್ನು ನಿಶ್ಚಲಗೊಳಿಸಬೇಕು. ಸ್ವಲ್ಪವೂ ಅಲ್ಲಡಿಸಬಾರದು. ಈ ರೀತಿ ಕುಳಿತುಕೊಳ್ಳದೇ ಮನಸ್ಸಿನ ಸ್ಥಿರತೆ ಅಸಾಧ್ಯ. ಮನಸ್ಸು ಈ ದೇಹವೆಂಬ ಪಾತ್ರೆಯೊಳಗಿನ ನೀರಿನಂತೆ. ಪಾತ್ರೆ ಅಲ್ಲಾಡಿದರೆ ಮನಸ್ಸೆಂಬ ನೀರಿನಲ್ಲಿ ಅಲೆಗಳು ಮೂಡುತ್ತವೆ. ಇದರಿಂದ ಏಕಾಗ್ರತೆಗೆ ಭಂಗವಾಗುತ್ತದೆ.
ದೇಹದಲ್ಲಿ ಇನ್ನೊಂದು ಪ್ರಮುಖ ಅಂಗ ಕಣ್ಣು. ದೇಹವನ್ನು ಸ್ಥಿರಗೊಳಿಸಿದ ಮೇಲೆ ಕಣ್ಣನ್ನು ಸ್ಥಿರಗೊಳಿಸಬೇಕು. ಮೂಗಿನ ತುದಿಯಲ್ಲಿ ದೃಷ್ಟಿಯನ್ನು ನೆಟ್ಟು ಯಾವ ದಿಕ್ಕಿನ ಯಾವ ಆಕೃತಿಯೂ ಕಾಣದಂತೆ ನೇರವಾಗಿ ಒಂದೇ ಕಡೆ ದೃಷ್ಟಿ ಸ್ಥಿರಗೊಳಿಸಬೇಕು.(ಕಣ್ಣನ್ನು ಮುಚ್ಚಿ ಧ್ಯಾನ ಮಾಡಬಹುದು, ಆದರೆ ಕಣ್ಣನ್ನು ಮುಚ್ಚಿದರೆ ನಿದ್ದೆ ಮಾಡುವ ಸಾಧ್ಯತೆ ಹೆಚ್ಚು).
ಈ ರೀತಿ ಧ್ಯಾನದ ಸ್ಥಿತಿಯನ್ನು ತಲುಪಿದಾಗ ಮನಸ್ಸು ಪ್ರಶಾಂತವಾಗುತ್ತದೆ. ಯಾವ ಗೊಂದಲವೂ ಇಲ್ಲದ ಹೇಳಲಾಗದ ವಿಚಿತ್ರ ಆನಂದದಸ್ಥಿತಿಯನ್ನು ನಾವು ಈ ಸ್ಥಿತಿಯಲ್ಲಿ ಅನುಭವಿಸುತ್ತೇವೆ. ಇದರಿಂದ ನಮಗೆ ಎಲ್ಲಾ ಭಯವೂ ಹೊರಟು ಹೋಗುತ್ತದೆ. ಧ್ಯಾನಕ್ಕೆ ಅತಿಮುಖ್ಯವಾಗಿ ಬೇಕಾದ ಇನ್ನೊಂದು ಅಂಶ ಬ್ರಹ್ಮಚರ್ಯ ಪಾಲನೆ. ಇಲ್ಲಿ ಬ್ರಹ್ಮಚರ್ಯ ಎನ್ನುವ ಪದಕ್ಕೆ ಮೂರು ಅರ್ಥವಿದೆ. ಪರಬ್ರಹ್ಮನ ಕಡೆಗೆ ಹೋಗುವ ಧೀಕ್ಷೆ-ಬ್ರಹ್ಮಚರ್ಯ; ನಿರಂತರ ವೇದಾಧ್ಯಯನ-ಬ್ರಹ್ಮಚರ್ಯ; ಸಂಸಾರಿಗಳಾದವರು ನಿಯಮಿತ ಲೈಂಗಿಕತೆ ಪಾಲಿಸುವುದು [ಅತಿ ಸುಲಭವಾಗಿ ಲೈಂಗಿಕತೆಯಿಂದ ದೂರ ಸರಿದು ನಿಲ್ಲುವ ಕ್ಷಮತೆ ಹಾಗೂ ನಿಯಮಿತ ಲೈಂಗಿಕತೆ] ಹಾಗೂ ವಿರಕ್ತಿಗಳ(ನೈಷ್ಠಿಕ ಬ್ರಹ್ಮಚಾರಿ) ಲೈಂಗಿಕ ಮುಕ್ತ ಜೀವನ-ಬ್ರಹ್ಮಚರ್ಯ. ಭಗವಂತನೇ ಸರ್ವೋತ್ತಮ ಎನ್ನುವ ಅಚಲವಾದ ಭಕ್ತಿಯಿಂದ, ಭಗವಂತನಲ್ಲಿ ಸಂಪೂರ್ಣ ಭರವಸೆಯನ್ನಿಟ್ಟು ಸದಾ ಭಗವಂತನನ್ನು ನೆನೆಯುತ್ತಾ, ಎಂದೂ ಎದೆಗುಂದದೆ ಸಮಾಧಿಯನ್ನು ಸಾಧಿಸಬೇಕು.

ಧ್ಯಾನದ ಪರಿಣಾಮವೇನು? ನಾವು ಏಕೆ ಧ್ಯಾನ ಮಾಡಬೇಕು? ಉತ್ತರ ಮುಂದಿನ ಶ್ಲೋಕ!

ಮುಂದಿನ ಶ್ಲೋಕವನ್ನು ವಿಶ್ಲೇಷಿಸುವ ಮೊದಲು ಇಲ್ಲಿ ಸಾಮಾನ್ಯವಾಗಿ ಎಲ್ಲರಿಗೂ ಕಾಡುವ ಒಂದು ಸರ್ವೇಸಾಮಾನ್ಯ ಪ್ರಶ್ನೆಯನ್ನು ವಿಶ್ಲೇಷಿಸೋಣ. ಯುದ್ಧರಂಗದಲ್ಲಿ ನಿಂತ ಅರ್ಜುನನಿಗೆ ಕೃಷ್ಣ ಭಗವದ್ಗೀತೆ ಉಪದೇಶ ಮಾಡಿದ. ಹೀಗಿರುವಾಗ ಆತ ಧ್ಯಾನದ ಬಗ್ಗೆ, ಧ್ಯಾನ ಸಮಾಧಿಯ ಬಗ್ಗೆ, ಧ್ಯಾನಕ್ಕೆ ಕುಳಿತುಕೊಳ್ಳುವ ವಿಧಾನದ ಬಗ್ಗೆ ಏಕೆ ಪ್ರಸ್ತಾಪಿಸಿದ? ಇದರ ಅಗತ್ಯವೇನಿತ್ತು? ಇದು ಸಾಮಾನ್ಯವಾಗಿ ಎಲ್ಲರನ್ನೂ ಕಾಡುವ ಪ್ರಶ್ನೆ. ನಿಜವಾಗಿ ನೋಡಿದರೆ ಅರ್ಜುನನಿಗೆ ಈ ಪ್ರಶ್ನೆಗಳಿರಲಿಲ್ಲ, ಅರ್ಜುನನ ಪ್ರಶ್ನೆಯೇ ಬೇರೆ. ಆ ಪ್ರಶ್ನೆಗೆ ಉತ್ತರ ಕೊಡುವಾಗ ಧ್ಯಾನದ ಪ್ರಶ್ನೆ ಸಾಮಾನ್ಯವಾಗಿ ಬಂದಾಗ, ಕೃಷ್ಣ ಇಡೀ ನರಸಮುದಾಯಕ್ಕೆ ಸಹಾಯವಾಗುವಂತೆ ಸಂಪೂರ್ಣ ಧ್ಯಾನದ ಪ್ರಕ್ರೀಯೆಯನ್ನು ವಿವರಿಸಿದ. ಕೃಷ್ಣ ಯುದ್ಧರಂಗದಲ್ಲಿ ಅದೆಷ್ಟು ಸೂಕ್ಷ್ಮವಾಗಿ ಅರ್ಜುನನಿಗೆ ಈ ಬೋಧನೆ ಮಾಡಿದ್ದನೋ ನಮಗೆ ತಿಳಿಯದು. ಆದರೆ ವ್ಯಾಸ ಮಹರ್ಷಿಗಳು ಇದನ್ನು ಎಳೆ ಎಳೆಯಾಗಿ ಬಿಡಿಸಿ ಒಂದು ಅಧ್ಯಾಯ ರೂಪದಲ್ಲಿ ನಮಗೆ ಉಣಬಡಿಸಿದ್ದಾರೆ. ಭಗವದ್ಗೀತೆಯನ್ನು ಅರ್ಜುನನಿಗೆ ಉಪದೇಶ ಮಾಡುವಾಗ ಕೃಷ್ಣನ ಮುಂದಿದ್ದದ್ದು ಕೇವಲ ಅರ್ಜುನ ಮಾತ್ರವಲ್ಲ; ಸಮಸ್ತ ಸಾತ್ವಿಕ ನರ ಸಮುದಾಯ. ಸರ್ವ ಸಾತ್ವಿಕರಿಗೂ ಸತ್ಯದ ದಾರಿಯನ್ನು ತೋರಿಸುವ ಉದ್ದೇಶದಿಂದ ಗೀತೆಯ ಉಪದೇಶವಾಯಿತು. ಇದೇ ಮೂಲ ಉದ್ದೇಶದಿಂದ ಶ್ರೀಕೃಷ್ಣ ಗೀತೆಯನ್ನು ಇನ್ನೊಮ್ಮೆ ಉದ್ದವನಿಗೆ ಉಪದೇಶ ಮಾಡಿದ್ದನ್ನು ನಾವಿಲ್ಲಿ ಸ್ಮರಿಸಬಹುದು.

ಯುಂಜನ್ನೇವಂ ಸದಾऽऽತ್ಮಾನಂ ಯೋಗೀ ನಿಯತಮಾನಸಃ ।
ಶಾಂತಿಂ ನಿರ್ಬಾಣಪರಮಾಂ ಮತ್ ಸಂಸ್ಥಾಮಧಿಗಚ್ಛತಿ ॥೧೫॥

ಯುಂಜನ್ ಏವಮ್ ಸದಾ ಆತ್ಮಾನಮ್ ಯೋಗೀ ನಿಯತ ಮಾನಸಃ ।
ಶಾಂತಿಮ್ ನಿರ್ಬಾಣ ಪರಮಾಮ್ ಮತ್ ಸಂಸ್ಥಾಮ್ ಅಧಿಗಚ್ಛತಿ -- ಹೀಗೆ ಭಗವಂತನನ್ನು ಸದಾ ಧ್ಯಾನಿಸುತ್ತಾ, ಬಗೆಯನ್ನು ಬಿಗಿ ಹಿಡಿದ ಸಾಧಕನು ದೇಹ ತೊರೆದ ಮೇಲೆ ನನ್ನಲ್ಲೇ ನೆಲೆಸುವಂತಹ ಸುಖವನ್ನು ಅನುಭವಿಸುತ್ತಾನೆ.

ಈ ಅಧ್ಯಾಯದಲ್ಲಿ ಈವರೆಗೆ ಕೃಷ್ಣ ವಿವರಿಸಿದ್ದು ಮನಸ್ಸಿನಿಂದ ಮಾಡುವ ಧ್ಯಾನ. ಬಾಹ್ಯ ಇಂದ್ರಿಯವನ್ನು ಸ್ಥಬ್ಧಗೊಳಿಸಿ, ಚಿತ್ತ ಮತ್ತು ಮನಸ್ಸನ್ನು ನಿಯಂತ್ರಿಸಿ ಮಾಡುವುದು ಧ್ಯಾನ. ಇದರಿಂದಾಚೆಗಿರುವುದು 'ತುರಿಯಾವಸ್ಥೆ'. ನಮ್ಮ ಮನಸ್ಸನ್ನು ಸಂಪೂರ್ಣ ಸ್ಥಬ್ಧಗೊಳಿಸಿ ಆತ್ಮಸ್ವರೂಪಭೂತವಾದ ಜೀವ ನೇರವಾಗಿ ಭಗವಂತನನ್ನು ನೋಡುವ ಸ್ಥಿತಿ ತುರಿಯಾವಸ್ಥೆ. ಈ ಶ್ಲೋಕದಲ್ಲಿ ಕೃಷ್ಣ ತುರಿಯಾವಸ್ಥೆಯ ಸುಳಿವು ಕೊಡುತ್ತಾನೆ. ಈ ವಿಚಾರ ಇಲ್ಲಿ ನಿಗೂಢವಾಗಿ ಅಡಗಿದೆ.

ಧ್ಯಾನದಲ್ಲಿ ನಾವು ಕಾಣುವುದು ನೇರ ಭಗವಂತನನ್ನಲ್ಲ ಬದಲಿಗೆ ಭಗವಂತನ ಪ್ರತೀಕವನ್ನು. ಏಕೆಂದರೆ ಮನಸ್ಸು ನೇರವಾಗಿ ಜ್ಞಾನಾನಂದಸ್ವರೂಪಭೂತನಾದ ಭಗವಂತನನ್ನು ಗ್ರಹಿಸಲಾರದು. ಭಗವಂತನ ನೇರ ದರ್ಶನವಾಗಬೇಕಾದರೆ, ಧ್ಯಾನದಿಂದಾಚೆಗಿನ ತುರಿಯಾವಸ್ಥೆಗೆ ಹೋಗಬೇಕು. ಜೀವಸ್ವರೂಪದ ಕಣ್ಣಿನಿಂದ ಭಗವಂತನನ್ನು ಕಾಣಬೇಕು. ಮನಸ್ಸನ್ನು ನಿರಂತರವಾಗಿ ಭಗವಂತನಲ್ಲಿ ನೆಲೆಗೊಳಿಸಿ, ಮನಸ್ಸಿನ ಮೂಲಕ ಧ್ಯಾನದಲ್ಲಿ ಭಗವಂತನ ಮಾನಸ ರೂಪ ಗೋಚರವಾದ ಮೇಲೆ ಮನಸ್ಸನ್ನು ಸ್ಥಬ್ಧಗೊಳಿಸಬೇಕು. ಆಗ

ತುರಿಯಾವಸ್ಥೆ ಜಾಗೃತವಾಗುತ್ತದೆ. ಈ ಹಂತದಲ್ಲಿ ಆತ್ಮ ಸ್ವರೂಪಕ್ಕೆ ಭಗವಂತನ ಸಂಯೋಗವಾಗುತ್ತದೆ. ಆಗ ಅದು ನೇರವಾಗಿ ಭಗವಂತನನ್ನು ಕಾಣಬಲ್ಲದು. ಈ ಸ್ಥಿತಿಯನ್ನು ತಲುಪಿದ ಧ್ಯಾನಯೋಗಿ ನಿಜವಾದ ಯೋಗಿ ಎನಿಸುತ್ತಾನೆ.

ಒಂದು ಜೀವ ತನ್ನ ಸಾಧನೆಯ ಹಾದಿಯಲ್ಲಿ ಪಡೆಯಬಹುದಾದ ಅತ್ಯಂತ ಮಹತ್ತರವಾದ ಆನಂದದ ಪರಾಕಾಷ್ಠೆ- ಭಗವಂತನ ಸಾಕ್ಷಾತ್ಕಾರ. ಇದಕ್ಕಿಂತ ಮಿಗಿಲಾದ ಅರಿವು, ಆನಂದದ ದರ್ಶನ ಇನ್ನೊಂದಿಲ್ಲ. ಈ ರೀತಿ ಭಗವಂತನ ಸಾಕ್ಷಾತ್ಕಾರವಾದವನು ಮುಂದೆಂದೂ ಈ ಸಂಸಾರ ಬಂಧದಲ್ಲಿ ಸಿಲುಕುವುದಿಲ್ಲ. ಆತ ಭಗವಂತನಲ್ಲೇ ನೆಲೆಸಿ ಮೋಕ್ಷವನ್ನು ಪಡೆಯುತ್ತಾನೆ.

ಸಮಾಧಿಯನ್ನು ಅಭ್ಯಾಸ ಮಾಡುವವರ ಜೀವನಕ್ರಮ ಹೇಗಿರಬೇಕು ಎನ್ನುವುದನ್ನು ಕೃಷ್ಣ ಮುಂದೆ ವಿವರಿಸುತ್ತಾನೆ. ಈ ಜೀವನಕ್ರಮ ಕೇವಲ ಧ್ಯಾನಕ್ಕೆ ಮಾತ್ರ ಪೂರಕವಲ್ಲ. ನಮ್ಮ ಅಧ್ಯಯನಕ್ಕೆ, ನಮ್ಮ ಆರೋಗ್ಯ ಜೀವನಕ್ಕೆ ಈ ಶಿಸ್ತು ಬಹಳ ಮುಖ್ಯ. ನಮ್ಮ ಪ್ರತಿಯೊಂದು ಅನುಷ್ಠಾನವನ್ನು ಶಾಸ್ತ್ರಕಾರರು ಇದಕ್ಕನುಗುಣವಾಗಿಯೇ ವಿನ್ಯಾಸ ಮಾಡಿದ್ದಾರೆ. ಆದರೆ ಇಂದು ನಮಗೆ ಈ ಎಚ್ಚರವಿಲ್ಲ. ಏಕಾದಶಿ ಉಪವಾಸವಿರಲಿ, ಇನ್ಯಾವುದೇ ಅನುಷ್ಠಾನವಿರಲಿ, ಅದನ್ನು ಧ್ಯಾನಕ್ಕೆ ಪೂರಕವಾಗಿ ಪಾಲಿಸಬೇಕು. ಈ ಜ್ಞಾನವಿಲ್ಲದೆ ಕೇವಲ ಯಾಂತ್ರಿಕವಾಗಿ ಪಾಲಿಸುವ ಯಾವ ಅನುಷ್ಠಾನವೂ ನಮ್ಮನ್ನು ಎತ್ತರಕ್ಕೆ ಕೊಂಡೊಯ್ಯಲಾರದು.

ನಾತ್ಯಶ್ನತಸ್ತು ಯೋಗೋಽಸ್ತಿ ನ ಚಾತ್ಯಂತಮನಶ್ನತಃ ।
ನ ಚಾತಿಸ್ವಪ್ನಶೀಲಸ್ಯ ಜಾಗ್ರತೋ ನೈವ ಚಾರ್ಜುನ ॥೧೬॥

ನ ಅತಿ ಅಶ್ನತಃ ತು ಯೋಗಃ ಅಸ್ತಿ ನ ಚ ಅತ್ಯಂತಮ್ ಅನಶ್ನತಃ ।
ನ ಚ ಅತಿ ಸ್ವಪ್ನ ಶೀಲಸ್ಯ ಜಾಗ್ರತಃ ನ ಏವ ಚ ಅರ್ಜುನ- ಹೇ ಅರ್ಜುನಾ, ಹೊಟ್ಟೆಬಾಕನಿಗೆ ಧ್ಯಾನಯೋಗ ಸಾಧ್ಯವಿಲ್ಲ. ತೀರಾ ತಿನ್ನದವನಿಗೂ ಇಲ್ಲ. ತುಂಬಾ ತೂಕಡಿಸುವವನಿಗೂ ಇಲ್ಲ. ನಿದ್ದೆಗೇಡಿಗೂ ಇಲ್ಲ.

ಅತಿಯಾಗಿ ತಿನ್ನುವವನಿಗೆ ಧ್ಯಾನ ಸಾಧ್ಯವಿಲ್ಲ. ಹೊಟ್ಟೆಗೆ ಹೆಚ್ಚು ಆಹಾರ ಹೋದಾಗ ಮನಸ್ಸು ನಿಸ್ತೇಜವಾಗುತ್ತದೆ. ಆದ್ದರಿಂದ ಮನನಶೀಲ ಹೊಟ್ಟೆಬಾಕನಾಗಿರಬಾರದು. ಅತಿಯಾದ ಆಹಾರ ಸೇವನೆ ಒಳ್ಳೆಯದಲ್ಲ. ಈ ಕಾರಣಕ್ಕಾಗಿ ಅತಿಥಿ ಸತ್ಕಾರದಲ್ಲಿ ಒತ್ತಾಯ ಮಾಡಿ ಬಡಿಸುವುದು ತಪ್ಪು. ಅದೇ ರೀತಿ ಯಾವಾಗಲೂ ಸರಿಯಾಗಿ ತಿನ್ನದೇ ಇದ್ದರೆ ಅದರಿಂದ ದೇಹ ಪೋಷಣೆ ಇಲ್ಲವಾಗಿ ದೇಹ ಕುಸಿಯುತ್ತದೆ. ಭಗವಂತನ ಸಾಕ್ಷಾತ್ಕಾರವಾಗುವುದು ಈ ದೇಹದ ಮೂಲಕವೇ. ಆದ್ದರಿಂದ ನಾವು ನಿಯತವಾದ ಆಹಾರವನ್ನು ನಿಯತ ಕಾಲದಲ್ಲಿ ತಿನ್ನುವ ಅಭ್ಯಾಸ ಮಾಡಿಕೊಳ್ಳಬೇಕು.

ಆಹಾರದ ಜೊತೆಗೆ ನಮ್ಮ ನಿದ್ದೆ ಮಾಡುವ ಅಭ್ಯಾಸ ನಿಯತವಾಗಿರಬೇಕು. ನಾವು ಹೇಗೆ ಅಭ್ಯಾಸ ಮಾಡಿಕೊಂಡೆವೋ ಹಾಗೇ ನಮ್ಮ ಮನಸ್ಸು. ಎಂದೂ ಅತಿನಿದ್ದೆ ಒಳ್ಳೆಯದಲ್ಲ. ಅದೇ ರೀತಿ ನಿದ್ದೆಗೆಟ್ಟರೆ ಖಂಡಿತ ಧ್ಯಾನ ಸಾಧ್ಯವಿಲ್ಲ. ನಿಯತವಾದ ಆಹಾರ ನಿದ್ದೆ ನಮ್ಮ ಆರೋಗ್ಯಕ್ಕೂ ಪೂರಕ ಹಾಗೂ ಧ್ಯಾನಕ್ಕೆ ಅತ್ಯಗತ್ಯ.

ಯುಕ್ತಾಹಾರವಿಹಾರಸ್ಯ ಯುಕ್ತಚೇಷ್ಟಸ್ಯ ಕರ್ಮಸು ।
ಯುಕ್ತಸ್ವಪ್ನಾವಬೋಧಸ್ಯ ಯೋಗೋ ಭವತಿ ದುಃಖಹಾ ॥೧೭॥

ಯುಕ್ತ ಆಹಾರ ವಿಹಾರಸ್ಯ ಯುಕ್ತ ಚೇಷ್ಟಸ್ಯ ಕರ್ಮಸು ।
ಯುಕ್ತ ಸ್ವಪ್ನ ಅವಬೋಧಸ್ಯ ಯೋಗಃ ಭವತಿ ದುಃಖ ಹಾ-- ತಕ್ಕ ತಿನಿಸು-ತಿರುಗಾಟ, ತಕ್ಕಷ್ಟೇ ಕಾಯಕ, ತಕ್ಕಂತೆ ನಿದ್ದೆ-ಎಚ್ಚರ ಸಾಧಿಸಿದವನಿಗೆ ಧ್ಯಾನಯೋಗದಿಂದ ದುಗುಡ ದೂರ.

ಯೋಗಾಭ್ಯಾಸ ಮಾಡುವಾಗ ನಮ್ಮ ಜೀವನಕ್ರಮ ಶಿಸ್ತುಬದ್ಧವಾಗಿರಬೇಕು. ನಿಯಮಿತವಾದ ಹಾಗೂ ಯೋಗ್ಯವಾದ ಆಹಾರ ಸೇವನೆ ಬಹಳ ಮುಖ್ಯ. ಧ್ಯಾನಕ್ಕೆ ಮನಸ್ಸನ್ನು ಅಣಿಗೊಳಿಸುವ ಸಾತ್ವಿಕ ಆಹಾರ ಸೇವನೆ ಧ್ಯಾನಕ್ಕೆ ಪೂರಕ. ಕೆಲವು ಆಹಾರ ನಮ್ಮ ಮನಸ್ಸಿನ ಮೇಲೆ ಕೆಟ್ಟ ಪರಿಣಾಮ ಬೀರುತ್ತದೆ. ಉದಾಹರಣೆಗೆ ಈರುಳ್ಳಿ ಮತ್ತು ಬೆಳ್ಳುಳ್ಳಿ. ಇವುಗಳಲ್ಲಿ ಔಷಧೀಯ ಗುಣವಿದ್ದರೂ ಕೂಡಾ ಇದು ನಮ್ಮ ಮನಸ್ಸಿನ ಮೇಲೆ ಪರಿಣಾಮ ಬೀರುವ ಆಹಾರ. ನಾವು ಈರುಳ್ಳಿ ಅಥವಾ ಬೆಳ್ಳುಳ್ಳಿಯನ್ನು ಅತಿಯಾಗಿ ಸೇವಿಸಿದ ದಿನ ನಮಗೆ ಕೆಟ್ಟ ಕನಸು ಬೀಳುವುದು ಈ ಆಹಾರ ಮನಸ್ಸಿನ ಮೇಲೆ ಪ್ರಭಾವ ಬೀರುತ್ತದೆ ಎನ್ನುವುದಕ್ಕೆ ಪುರಾವೆ[ಆದರೆ ವೈದ್ಯರು ಆರೋಗ್ಯ ದೃಷ್ಟಿಯಿಂದ ಇದನ್ನು ಔಷಧವಾಗಿ ಸೇವಿಸಲು ಹೇಳಿದರೆ ಆಗ ತಿನ್ನುವುದರಲ್ಲಿ ಯಾವ ತೊಂದರೆಯೂ ಇಲ್ಲ. ಏಕೆಂದರೆ ಅಧ್ಯಯನಕ್ಕೆ ಮೊತ್ತಮೊದಲು ಆರೋಗ್ಯ ಬೇಕು]. ವೇದಾಧ್ಯಾಯನ ಮಾಡುವವರು ಇಂತಹ ಮನಸ್ಸನ್ನು ಕೆಡಿಸುವ ಆಹಾರವನ್ನು ಸೇವಿಸಬಾರದು. ನಮ್ಮ ದೇಹದ ಪೋಷಣೆಯ ಜೊತೆಗೆ ನಮ್ಮ ಮನಸ್ಸಿಗೆ ಸಾತ್ವಿಕ ಪೋಷಣೆ ಕೊಡುವ ಆಹಾರವನ್ನು ಇಲ್ಲಿ ಕೃಷ್ಣ "ಯುಕ್ತಾಹಾರ" ಎಂದು ಕರೆದಿದ್ದಾನೆ.

ನಮ್ಮ ಮನಸ್ಸಿಗೆ ನಾವು ಎಷ್ಟು ಬೇಕೋ ಅಷ್ಟು ವಿರಾಮ ಕೊಡುವುದು ಬಹಳ ಮುಖ್ಯ. ಆದರೆ ಈ ವಿರಾಮ ಸೋಮಾರಿತನವಾಗಿ ರೂಪುಗೊಳ್ಳಬಾರದು. ಮನಸ್ಸಿಗೆ ವಿರಾಮ ಕೊಡುವಾಗ ಯಾವ ಚಿಂತನೆ ಕೂಡಾ ಮಾಡದೆ ಸಂಪೂರ್ಣ ವಿಶ್ರಾಂತಿಯನ್ನು ಕೊಡಬೇಕು. ಆಗ ಮನಸ್ಸು ಧ್ಯಾನಕ್ಕೆ ಪೂರಕವಾಗಿ ಕೆಲಸ ಮಾಡುತ್ತದೆ. "ಯುಕ್ತಚೇಷ್ಟಸ್ಯ ಕರ್ಮಸು" ನಾವು ಮಾಡಬೇಕಾದ ಕೆಲಸ ಕಾರ್ಯವನ್ನು ಕ್ರಮಬದ್ಧವಾಗಿ ಪ್ರಮಾಣಬದ್ಧವಾಗಿ ನಾವೇ ಮಾಡಬೇಕು. ಮಾಡಬೇಕಾದ ಕೆಲಸದಲ್ಲಿ ಸೋಮಾರಿತನವಿರಬಾರದು.

ಶಾಸ್ತ್ರೀಯವಾದ ಶುದ್ಧವಾದ ಕ್ರಮಬದ್ದವಾದ ಆಹಾರ ಸೇವನೆ, ತಕ್ಕ ಕಾಲದಲ್ಲಿ ತಕ್ಕಷ್ಟು ನಿದ್ದೆ ಹಾಗೂ ಎಚ್ಚರ, ಕ್ರಮಬದ್ಧವಾದ ಪರಿಶ್ರಮ ಮತ್ತು ವಿರಾಮ- ಹೀಗೆ ಇದ್ದಾಗ "ಯೋಗೋ ಭವತಿ ದುಃಖಹಾ"- ದುಃಖ ರಹಿತ ಆನಂದಮಯ ಜೀವನ ಸಾಧ್ಯ.

ಧ್ಯಾನಯೋಗದಿಂದ ಮನಸ್ಸು ಒಂದು ಹದಕ್ಕೆ ಬರುತ್ತದೆ. ಮನಸ್ಸು ಹದವಾದಾಗ ಹೊರಪ್ರಪಂಚದಲ್ಲಿ ನಾವು ಅನುಭವಿಸುವ ಸುಖ-ದುಃಖಗಳನ್ನೂ ನಿರ್ಲಿಪ್ತವಾಗಿ ನೋಡಲು ಅಭ್ಯಾಸವಾಗುತ್ತದೆ. ಇದರಿಂದ ಸುಖ ಬಂದಾಗ ಹಾರಾಟವಿಲ್ಲ, ದುಃಖ ಬಂದಾಗ ಪಾತಾಳಕ್ಕೆ ಕುಸಿಯುವುದೂ ಇಲ್ಲ. ಸುಖ-ದುಃಖ, ಸೋಲು-ಗೆಲುವಿನ ದ್ವಂದ್ವವೇ ಜೀವನ ಎನ್ನುವ ಸಮದೃಷ್ಟಿ ಧ್ಯಾನಯೋಗದಿಂದ ಬಂದುಬಿಡುತ್ತದೆ.

ಯದಾ ವಿನಿಯತಂ ಚಿತ್ತಮಾತ್ಮನ್ಯೇವಾವತಿಷ್ಠತೇ ।
ನಿಸ್ಪೃಹಃ ಸರ್ವಕಾಮೇಭ್ಯೋ ಯುಕ್ತ ಇತ್ಯುಚ್ಯತೇ ತದಾ ॥೧೮॥

ಯದಾ ವಿನಿಯತಮ್ ಚಿತ್ತಮ್ ಆತ್ಮನಿ ಏವ ಅವತಿಷ್ಠತೇ ।
ನಿಸ್ಪೃಹಃ ಸರ್ವ ಕಾಮೇಭ್ಯಃ ಯುಕ್ತಃ ಇತಿ ಉಚ್ಯತೇ ತದಾ-ಚೆನ್ನಾಗಿ ಹದಗೊಂಡ ಒಳಬಗೆ ಭಗವಂತನಲ್ಲೇ ನೆಲೆಗೊಂಡಾಗ, ಎಲ್ಲಾ ಕಾಮಗಳ ಆಸೆ ಅಳಿದಾಗ 'ಧ್ಯಾನಯೋಗಿ' ಎನ್ನಿಸಿಕೊಳ್ಳುತ್ತಾನೆ.

ಯೋಗಾಭ್ಯಾಸದಿಂದ ಯೋಗಿಯ ಸುಪ್ತಪ್ರಜ್ಞೆ ನಿಯಂತ್ರಣವಾಗುತ್ತದೆ. ಸಾಮಾನ್ಯವಾಗಿ ನಮ್ಮ ಚಿತ್ತದಲ್ಲಿರುವ ಹಿಂದಿನ ಕೆಟ್ಟ ನೆನಪುಗಳು ಸದಾ ನಮ್ಮನ್ನು ಕಾಡುತ್ತಿರುತ್ತವೆ. ಯಾವುದೋ ಹಗೆ, ಯಾವುದೋ ಪ್ರೀತಿ ಇವೆಲ್ಲವನ್ನೂ ಬದಿಗೊತ್ತಿ ಯೋಗಿ ತನ್ನ ಅಂತರಂಗದ ಪೀಠದಲ್ಲಿ ಕೇವಲ ಭಗವಂತನನ್ನು ಕೂರಿಸಬಲ್ಲ. ಹೀಗೆ ಮಾಡಿದಾಗ ಸದಾ ಅಂತರಂಗದಲ್ಲಿ ಭಗವಂತನ ದರ್ಶನವಾಗುತ್ತದೆ. ಆ ಭಗವಂತನನ್ನು ಕಂಡಮೇಲೆ ಇನ್ನೇನೂ ಬೇಕು ಎನಿಸುವುದಿಲ್ಲ. ಏಕೆಂದರೆ ಭಗವಂತ ನಾವು ಬಯಸುವ ಸಂಗತಿಗಳಲ್ಲೇ ಅತ್ಯಂತ ಶ್ರೇಷ್ಠವಾದ ಸಂಗತಿ. ಅಂತರಂಗದ ಆನಂದದ ಚಿಲುಮೆ ತೆರೆದುಕೊಂಡಾಗ ಕ್ಷುದ್ರವಾದ ಬಾಹ್ಯ ಕಾಮನೆಗಳು ಅಳಿದುಹೋಗಿ ಆತ ಧ್ಯಾನಯೋಗಿ ಎನಿಸಿಕೊಳ್ಳುತ್ತಾನೆ.

ಯಥಾ ದೀಪೋ ನಿವಾತಸ್ಥೋ ನೇಂಗತೇ ಸೋಪಮಾ ಮತಾ ।
ಯೋಗಿನೋ ಯತಚಿತ್ತಸ್ಯ ಯುಂಜತೋ ಯೋಗಮಾತ್ಮನಃ ॥೧೯॥

ಯಥಾ ದೀಪಃ ನಿವಾತಸ್ಥಃ ನ ಇಂಗತೇ ಸಾ ಉಪಮಾ ಮತಾ ।
ಯೋಗಿನಃ ಯತಚಿತ್ತಸ್ಯ ಯುಂಜತಃ ಯೋಗಮಾತ್ಮನಃ –ಗಾಳಿಯಿಲ್ಲದ ತಾಣದಲ್ಲಿರುವ ದೀಪ ಹಂದುವುದಿಲ್ಲ ಹೇಗೋ ಹಾಗೆ ಇದು: ಒಳಬಗೆಯನ್ನು ಹದಗೊಳಿಸಿ ಭಗವಂತನನ್ನು ನೆನೆಯುವ ಧ್ಯಾನಯೋಗಿಗೆ ಇದು ಉಪಮಾನ.

ಗಾಳಿ ಬೀಸದ ಸ್ಥಳದಲ್ಲಿ ಉರಿಯುವ ಬೆಂಕಿಯ ಶಿಖೆಯಂತೆ ಬಗೆಯನ್ನು ಹದಗೊಳಿಸಿದ ಯೋಗಿಯ ಮನಸ್ಸಿನಲ್ಲಿ, 'ಭಗವಂತನ ಕುರಿತಾದ ಮನಸ್ಸಿನ ಯೋಗ(ಆತ್ಮಯೋಗ)' ನಿಶ್ಚಲವಾಗಿರುತ್ತದೆ. ಅದು ಚಲಿಸುವುದಿಲ್ಲ.

ಯತ್ರೋಪರಮತೇ ಚಿತ್ತಂ ನಿರುದ್ಧಂ ಯೋಗಸೇವಯಾ ।
ಯತ್ರ ಚೈವಾSತ್ಮನಾSSತ್ಮಾನಂ ಪಶ್ಯನ್ನಾತ್ಮನಿ ತುಷ್ಯತಿ ॥೨೦॥

ಯತ್ರ ಉಪರಮತೇ ಚಿತ್ತಮ್ ನಿರುದ್ಧಮ್ ಯೋಗ ಸೇವಯಾ।
ಯತ್ರ ಚ ಏವ ಆತ್ಮನಾ ಆತ್ಮಾನಮ್ ಪಶ್ಯನ್ ಆತ್ಮನಿ ತುಷ್ಯತಿ ॥

ಸುಖಮ್ಯಾತ್ಯಂತಿಕಂ ಯತ್ತದ್ ಬುದ್ಧಿ ಗ್ರಾಹ್ಯಮತೀಂದ್ರಿಯಮ್ ।
ವೇತ್ತಿ ಯತ್ರ ನ ಚೈವಾಯಂ ಸ್ಥಿತಶ್ಚಲತಿ ತತ್ತ್ವತಃ ॥೨೧॥

ಸುಖಮ್ ಆತ್ಯನ್ತಿಕಮ್ ಯತ್ ತತ್ ಬುದ್ಧಿ ಗ್ರಾಹ್ಯಮ್ ಅತೀಂದ್ರಿಯಮ್ ।
ವೇತ್ತಿ ಯತ್ರ ನ ಚ ಏವ ಅಯಮ್ ಸ್ಥಿತಃ ಚಲತಿ ತತ್ತ್ವತಃ ॥

ಯಂ ಲಬ್ಧ್ವಾ ಚಾಪರಂ ಲಾಭಂ ಮನ್ಯತೇ ನಾಧಿಕಂ ತತಃ ।
ಯಸ್ಮಿನ್ ಸ್ಥಿತೋ ನ ದುಃಖೇನ ಗುರುಣಾSಪಿ ವಿಚಾಲ್ಯತೇ ॥೨೨॥

ಯಮ್ ಲಬ್ಧ್ವಾ ಚ ಅಪರಮ್ ಲಾಭಮ್ ಮನ್ಯತೇ ನ ಅಧಿಕಮ್ ತತಃ ।
ಯಸ್ಮಿನ್ ಸ್ಥಿತಃ ನ ದುಃಖೇನ ಗುರುಣಾ ಅಪಿ ವಿಚಾಲ್ಯತೇ ॥

ತಂ ವಿದ್ಯಾದ್ ದುಃಖಸಂಯೋಗವಿಯೋಗಂ ಯೋಗಸಂಜ್ಞಿತಮ್ ।
ಸ ನಿಶ್ಚಯೇನ ಯೋಕ್ತವ್ಯೋ ಯೋಗೋSನಿರ್ವಿಣ್ಣಚೇತಸಾ ॥೨೩॥

ತಮ್ ವಿದ್ಯಾತ್ ದುಃಖಸಂಯೋಗ ವಿಯೋಗಮ್ ಯೋಗಸಂಜ್ಞಿತಮ್ ।
ಸಃ ನಿಶ್ಚಯೇನ ಯೋಕ್ತವ್ಯಃ ಯೋಗಃ ಅನಿರ್ವಿಣ್ಣಚೇತಸಾ ॥

ಧ್ಯಾನ ಸಾಧನೆಯಿಂದ ಬಿಗಿಗೊಂಡ ಒಳಬಗೆ ಈ ಸ್ಥಿತಿಯಲ್ಲಿ ಹೊರಗಣ ವಿಷಯಗಳತ್ತ ಹರಿಯದು. ಇಲ್ಲಿ ತನ್ನೊಳಗೆಯೇ ಬಗೆಯಿಂದ[ಭಗವಂತನ ಹಸಾದದಿಂದ] ಭಗವಂತನನ್ನು ಕಾಣುತ್ತಾ ಸಂತಸಗೊಳ್ಳುತ್ತಾನೆ.ಇಲ್ಲಿ ಇಂದ್ರಿಯಗಳಿಂದ ದೊರಕದ, ಒಳಬಗೆಯಲ್ಲಿ ಅರಳುವ ಅತಿಶಯವಾದ ಆನಂದವನ್ನು ಅನುಭವಿಸುತ್ತಾನೆ. ಈ ಸ್ಥಿತಿಯಲ್ಲಿ ನಿಂತವನು ಎಂದೂ ಭಗವಂತನಿಂದ ಕದಲುವುದಿಲ್ಲ. ಇದನ್ನು ಪಡೆದ ಮೇಲೆ ಇನ್ಯಾವ ಗಳಿಕೆಯೂ ಇದಕ್ಕಿಂತ ಮಿಗಿಲೆನಿಸುವುದಿಲ್ಲ. ಇಲ್ಲಿ ನಿಂತವನು ಎಂತಹ ಹಿರಿಯ ದುಗುಡದಿಂದಲೂ ಕಂಗೆಡುವುದಿಲ್ಲ. ಇದೇ ಎಲ್ಲಾ ದುಗುಡಗಳಿಂದ ಬಿಡುಗಡೆಗೊಳಿಸುವ ಯೋಗವೆಂದರಿಯಬೇಕು. ವಿಷಯಗಳಿಂದ ಬೇಸತ್ತು ಬೆನ್ನು ತಿರುಗಿಸಿದವನು ಅವಶ್ಯವಾಗಿ ಈ ಯೋಗದಲ್ಲಿ ಪಳಗಬೇಕು.

ಹೊರಗಿನ ಪ್ರಪಂಚದ ಸಂಪರ್ಕವನ್ನು ಕಳೆದುಕೊಂಡು ಮನಸ್ಸು ಭಗವಂತನಲ್ಲಿ ನೆಲೆಸಿದಾಗ ಏನಾಗುತ್ತದೆ ಎಂದರೆ- ಕೃಷ್ಣ ಹೇಳುತ್ತಾನೆ: "ಉಪರಮತೇ ಚಿತ್ತಮ್" ಅಂದರೆ ಉತ್ಕೃಷ್ಟವಾದ ಆ ಆನಂದದಲ್ಲೇ ಮನಸ್ಸು ನಿಂತುಬಿಡುತ್ತದೆ. ಆ ಆನಂದದ ಸೆಲೆಯಿಂದ ಬೇರೆಯಾಗುವುದು ಬೇಡ ಎನ್ನುವ ಭಾವನೆ ಬಂದುಬಿಡುತ್ತದೆ. ಸಾಮಾನ್ಯವಾಗಿ ತಕ್ಷಣ ಈ ಸ್ಥಿತಿಗೆ ಮನಸ್ಸು ಹೋಗುವುದಿಲ್ಲ. ಅದಕ್ಕೆ ಬಹಳ ಪ್ರಯತ್ನ ಬೇಕು. ಪ್ರಯತ್ನ ಒಂದು ಜನ್ಮದ್ದಲ್ಲ ಅನೇಕ ಜನ್ಮದ ಪ್ರಯತ್ನವಿಲ್ಲದೆ ಒಮ್ಮೆಗೇ ಈ ಸ್ಥಿತಿಯನ್ನು ತಲುಪುವುದು ಅಸಾಧ್ಯ. ನಿರಂತರ ಯೋಗಾಭ್ಯಾಸದ ಸಾಧನೆಯಿಂದ ಚಿತ್ತವೃತ್ತಿಯನ್ನು ನಿರೋಧ ಮಾಡಬೇಕು. ಅಂದರೆ ನಮ್ಮ ಮನಸ್ಸನ್ನು ತಡೆಹಿಡಿಯಬೇಕು. ಅದು ಎಲ್ಲಿಯೂ ಹರಿಯದಂತೆ ಒಡ್ಡುಹಾಕಿ ಅದು ಭಗವಂತನಲ್ಲೇ ನೆಲೆನಿಲ್ಲುವಂತೆ ಮಾಡಬೇಕು.

ನಮಗೆ ಆತ್ಮಸಾಕ್ಷಾತ್ಕಾರವಾದಾಗ ಎಂದೂ ಆಗದ ಅಪೂರ್ವ ಆನಂದವಾಗುತ್ತದೆ. ಇದು ಅತ್ಯಂತ ಶ್ರೇಷ್ಠವಾದ ಆನಂದದ ಅನುಭವ. ಭಗವಂತನ ಬಗ್ಗೆ ಭಕ್ತನ ಭಕ್ತಿ ಹಾಗೂ ಭಕ್ತನ ಮೇಲೆ ಭಗವಂತನ ವಾತ್ಸಲ್ಯ ಇವೆರಡೂ ಮೇಳವಹಿಸಿದಾಗ 'ನಿರ್ಭಯ'. ಒಳಗಣ್ಣಿನಿಂದ ಧ್ಯಾನದ ಸ್ಥಿತಿಯಲ್ಲಿ ಅಂತರ್ಯಾಮಿಯಾದ ಭಗವಂತನನ್ನು ಕಾಣುವುದು ಧ್ಯಾನದಲ್ಲಿ ಬರುವ ಅನುಭವ. ಇಲ್ಲಿ ನಮಗೆ ಕಾಣುವುದು ಮನಸ್ಸು ಕಡೆದ ಆ ಭಗವಂತನ ಭವ್ಯ ರೂಪ. ಇದು ಕೇವಲ ಭಗವಂತನ ಪ್ರತೀಕ. ನಾವು ಭಗವಂತನನ್ನು ನಿಜವಾಗಿ ಕಾಣಬೇಕಾದರೆ ಅವನು ನಮ್ಮನ್ನು ಪ್ರೀತಿಸಬೇಕು. ಭಗವದ್ ಅನುಗ್ರಹವಾದಾಗ ನಮ್ಮ ಸ್ವರೂಪ ಭಗವಂತನನ್ನು ಕಾಣುತ್ತದೆ. ಇದು ಬಹಳ ಉತ್ಕಟವಾದ ಸ್ಥಿತಿ. ಈ ಸ್ಥಿತಿಯಲ್ಲಿ ಮನಸ್ಸು ಸಂಪೂರ್ಣ ಸ್ತಬ್ಧವಾಗಿ ನೇರವಾಗಿ ಆತ್ಮಸ್ವರೂಪ ತನ್ನ ಆತ್ಮಸ್ವರೂಪದ ಕಣ್ಣಿನಿಂದ ಭಗವಂತನನ್ನು ಕಾಣುತ್ತದೆ. ಈ ಸ್ಥಿತಿ ಸಂಪೂರ್ಣ ತೃಪ್ತಿಯನ್ನು ಕೊಡಬಲ್ಲದು. ಇಂದ್ರಿಯಗಳಿಂದ ಸಿಗುವ ಆನಂದ ಸಾಪೇಕ್ಷ ಎನ್ನುವ ನಿಜ ಆ ಹಂತದಲ್ಲಿ ತಿಳಿಯುತ್ತದೆ. ಈ ಉತ್ಕಟವಾದ ಆನಂದವನ್ನು ಅನುಭವಿಸಿದ ಮೇಲೆ ಮತ್ತೆ ಮೇಲೇರಬೇಕು ಅಥವಾ ಕೆಳಗಿಳಿಯಬೇಕು ಎನ್ನುವ ಬಯಕೆ ಇಲ್ಲ. ಭಗವಂತನ ಪೂರ್ಣ ಅನುಭವ ಬಂದಾತ ಯಾವ ಪ್ರಾಪಂಚಿಕ ದುಃಖದಲ್ಲೂ ಎಂದೂ ವಿಚಲಿತನಾಗುವುದಿಲ್ಲ. ಇದು ಮಾನವ ಜೀವನದಲ್ಲಿ ಪಡೆಯಬಹುದಾದ ಅತೀ ಎತ್ತರದ ಸ್ಥಿತಿ. ನಾವು ನಿಜವಾದ ಆನಂದವನ್ನು ಕಾಣಬೇಕಾದರೆ ಈ ಉತ್ಕಟವಾದ ಸ್ಥಿತಿಯನ್ನು ತಲುಪಬೇಕು.

ಮೇಲೆ ಹೇಳಿದ ವಿಚಾರವನ್ನು ಕೇಳಿ ಕೆಲವರು ಭ್ರಮೆಗೊಳಗಾಗಿ ಒಮ್ಮೆಗೇ ಎಲ್ಲವನ್ನೂ ಬಿಟ್ಟು ಈ ಸ್ಥಿತಿಯನ್ನು ತಲುಪುವ ಸಾಹಸಕ್ಕೆ ಕೈ ಹಾಕುತ್ತಾರೆ. ಆದರೆ ಹಾಗೆ ಮಾಡಿದರೆ ಎಂದೂ ಯಶಸ್ಸು ಸಿಗದು. ಕೇವಲ ನಿರಂತರ ಸಾಧನೆಯಿಂದ ಮಾತ್ರ ಈ ಆನಂದವನ್ನು ಪಡೆಯಲು ಸಾಧ್ಯ. ಜೀವನದ ಸುಖವನ್ನು ಅನುಭವಿಸಿ, ಪ್ರಾಪಂಚಿಕ ಸುಖ ಸಾಕು ಎಂದು ಕಾಣಿಸಿದಾಗ ಅಧ್ಯಾತ್ಮದ ಆಳಕ್ಕಿಳಿಯುವ ಪ್ರಯತ್ನ ಮಾಡಬೇಕು. ಇಲ್ಲದಿದ್ದರೆ ಅಪಾಯ.

ಸಂಕಲ್ಪಪ್ರಭವಾನ್ ಕಾಮಾಂಸ್ತ್ಯಕ್ತ್ವಾ ಸರ್ವಾನಶೇಷತಃ ।
ಮನಸೈವೇದ್ರಿಯಗ್ರಾಮಂ ವಿನಿಯಮ್ಯ ಸಮಂತತಃ ॥೨೪॥
ಶನೈಃ ಶನೈರುಪರಮೇದ್ ಬುದ್ಧ್ಯಾ ಧೃತಿಗೃಹೀತಯಾ ।
ಆತ್ಮಸಂಸ್ಥಂ ಮನಃ ಕೃತ್ವಾ ನ ಕಿಂಚಿದಪಿ ಚಿಂತಯೇತ್ ॥೨೫॥

ಸಂಕಲ್ಪ ಪ್ರಭವಾನ್ ಕಾಮಾನ್ ತ್ಯಕ್ತ್ವಾ ಸರ್ವಾನ್ ಅಶೇಷತಃ ।
ಮನಸಾ ಏವ ಇಂದ್ರಿಯ ಗ್ರಾಮಮ್ ವಿನಿಯಮ್ಯ ಸಮಂತತಃ ॥
ಶನೈಃ ಶನೈಃ ಪರಮೇತ್ ಬುದ್ಧ್ಯಾ ಧೃತಿ ಗೃಹೀತಯಾ ।
ಆತ್ಮಸಂಸ್ಥಮ್ ಮನಃ ಕೃತ್ವಾ ನ ಕಿಂಚಿತ್ ಅಪಿ ಚಿಂತಯೇತ್ –ಬಗೆಯಲ್ಲಿ ಮೂಡಿಬರುವ ಎಲ್ಲಾ ಬಯಕೆಗಳನ್ನೂ ಪೂರ್ತಿಯಾಗಿ ತೊರೆದುಬಿಡಬೇಕು; ಇಂದ್ರಿಯಗಳ ಗಡಣವನ್ನು ಎಲ್ಲೆಡೆಯಿಂದಲೂ ಮನೋಬಲದಿಂದಲೇ ಹಿಡಿತದಲ್ಲಿಡಬೇಕು; ಅಳುಕದ ವಿವೇಕ ಪ್ರಜ್ಞೆಯಿಂದ ಮೆಲ್ಲಮೆಲ್ಲನೆ ಬಗೆಯನ್ನು ವಿಷಯಗಳಿಂದ ಹೊರಳಿಸಬೇಕು; ಭಗವಂತನಲ್ಲಿರಿಸಬೇಕು. ಇರಿಸಿ ಮತ್ತೇನನ್ನೂ ಚಿಂತಿಸಬಾರದು.

ಮನಸ್ಸನ್ನು ಭಗವಂತನಲ್ಲಿ ನೆಲೆಗೊಳಿಸುವ ವಿಧಾನವನ್ನು ಮತ್ತೆ ಕೃಷ್ಣ ಇಲ್ಲಿ ವಿವರಿಸುತ್ತಾನೆ. ಕೃಷ್ಣ ಹೇಳುತ್ತಾನೆ: "ಸಂಕಲ್ಪ ಪ್ರಭವಾನ್ ಕಾಮಾನ್ ತ್ಯಕ್ತ್ವಾ ಸರ್ವಾನ್ ಅಶೇಷತಃ" ಎಂದು. ಇದರ ಹಿನ್ನೆಲೆಯನ್ನು ಹಿಂದೆ ನಾವು ನೋಡಿದ್ದೇವೆ. ನಮ್ಮ ಎಲ್ಲಾ ಸಮಸ್ಯೆಗಳ ಮೂಲ ನಮ್ಮ ಸಂಕಲ್ಪಗಳು. ಸಂಕಲ್ಪಗಳು ಎಂದರೆ ಮನಸ್ಸಿನಲ್ಲಿ ಏನೇನು ಮಾಡಬೇಕು ಎನ್ನುವ ತೀರ್ಮಾನ. ನಾವು ಯಾವುದೇ ಒಂದು ಕೆಲಸವನ್ನು ಮಾಡುವ ಮೊದಲು ಅದನ್ನು ಮಾನಸಿಕವಾಗಿ ಮಾಡುತ್ತೇವೆ. ಇಂದು ಇಲ್ಲಿಗೆ ಹೋಗಬೇಕು, ಇಂತವರನ್ನು ಭೇಟಿಯಾಗಬೇಕು, ಅಲ್ಲಿ ಇಂತಹದ್ದನ್ನು ಪಡೆಯಬೇಕು, ಇತ್ಯಾದಿ ವೇಳಾಪಟ್ಟಿ ನಮ್ಮ ಮನಸ್ಸಿನಲ್ಲಿ ನೆಟ್ಟಿರುತ್ತದೆ. ಈ ರೀತಿ ಸಾವಿರ ಸಂಕಲ್ಪಗಳು, ಅದನ್ನು ಈಡೇರಿಸಿಕೊಳ್ಳುವುದಕ್ಕೆ ಸಾವಿರ ಬಯಕೆಗಳು. 'ಹೀಗೆ ಮಾಡಬೇಕು ಅದರಿಂದ ಹೀಗೇ ಆಗಬೇಕು ಎನ್ನುವ ಆಸೆಗಳು'. ಬದುಕು ಎಂದರೆ ನಾವು ನಮ್ಮ ಮನಸ್ಸಿನಲ್ಲಿ ಕಲ್ಪಿಸಿಕೊಂಡ ಬದುಕಿನ ರೂಪುರೇಷೆಯನ್ನು ಬಾಹ್ಯ ಪ್ರಪಂಚದಲ್ಲಿ ಸಾಕಾರಗೊಳಿಸುವ ಪ್ರಯತ್ನ. ಹೀಗೆ ಸಾವಿರಾರು ಸಂಕಲ್ಪ ಮತ್ತು ಕಾಮನೆಯನ್ನು ಮನಸ್ಸಿನಲ್ಲಿ ತುಂಬುತ್ತಾ ಹೋದರೆ ಮನಸ್ಸಿಗೆ ಅದರಿಂದಾಚೆಗೆ ಯೋಚಿಸಲು ಅವಕಾಶವೇ ಇಲ್ಲವಾಗುತ್ತದೆ. ಮನಸ್ಸು ಎಂದರೆ ಬರೀ ಸಂಕಲ್ಪ-ವಿಕಲ್ಪ. ಏನೇನೋ ಕನಸು ಕಟ್ಟುವುದು(ಸಂಕಲ್ಪ), ಮಾಡಬೇಕೋ ಬೇಡವೋ, ಮಾಡಿದರೆ ಯಶಸ್ವಿ ಆದೀತೋ ಇಲ್ಲವೋ (ವಿಕಲ್ಪ) ಎಂದು ಯೋಚಿಸುತ್ತಾ ಅದರಿಂದ ಗೊಂದಲಕ್ಕೊಳಗಾಗುವುದು. ಇದರಿಂದಾಚೆಗೆ ಮನಸ್ಸು ಹೋಗುವುದೇ ಇಲ್ಲ. ಕೃಷ್ಣ ಹೇಳುತ್ತಾನೆ "ಮೊದಲು ನಿನ್ನ ಸಂಕಲ್ಪಗಳನ್ನು ಬಿಟ್ಟುಬಿಡು" ಎಂದು. ಈ ಸಂಕಲ್ಪಗಳು ತಿರುಕನ ಕನಸಿನಂತೆ. ಎಷ್ಟು ಹೆಚ್ಚು ಸಂಕಲ್ಪ ನಮ್ಮ ಮನಸ್ಸಿಗೆ ಬರುತ್ತದೇ ಅಷ್ಟೇ ಹತಾಶೆ ಹೆಚ್ಚಾಗುತ್ತದೆ, ಅದರಿಂದ ವ್ಯಾಕುಲತೆ. ನಂತರ ಏನನ್ನೂ ಯೋಚಿಸಲು ಆಗುವುದಿಲ್ಲ!

ಬಯಸುವುದು ಮನಸ್ಸಿನ ಸಹಜ ಗುಣ, ಬಯಸದೇ ಬದುಕಿಲ್ಲ. ಅದಕ್ಕಾಗಿ ಏನು ಬರುತ್ತದೋ ಅದು ಬರಲಿ ಎಂದು ಬಯಸುವುದನ್ನು ಕಲಿತು ನಮ್ಮ ಇತರ ಸಂಕಲ್ಪ ವಿಕಲ್ಪವನ್ನು ಬಿಟ್ಟುಬಿಡಬೇಕು. ಇದು ಯಶಸ್ವಿನ ಸೂತ್ರ. ಬಯಸಿದ್ದು ಸಿಗುವುದಿಲ್ಲ, ಬಯಸಿದಂತೆ ಆಗುವುದಿಲ್ಲ ಎಂದ ಮೇಲೆ ಅನಗತ್ಯ ಕನಸಿನ ಗೋಪುರ ಕಟ್ಟುವುದರಲ್ಲಿ ಯಾವ ಅರ್ಥವೂ ಇಲ್ಲ. ನಮ್ಮ ಸಂಕಲ್ಪ ಕೇವಲ ಒಂದೇ ಒಂದು- 'ಭಗವಂತನ ಸಂಕಲ್ಪ ಹೇಗೋ ಹಾಗೆ'. ದ್ವಾದಶ ಸ್ತೋತ್ರದಲ್ಲಿ ಮಧ್ವಾಚಾರ್ಯರು ಹೇಳುವಂತೆ:

ಕುರು ಭುಂಕ್ಷ್ವ ಚ ಕರ್ಮ ನಿಜಂ ನಿಯತಂ ಹರಿಪಾದ ವಿನಮ್ರಧಿಯಾ ಸತತಂ ।

ಹರಿರೇವ ಪರೋ ಹರಿರೇವ ಗುರುಃ ಹರಿರೇವ ಜಗತ್ ಪಿತೃಮಾತೃಗತಿಃ || ೩.೧ ||

ನಿನ್ನ ಪಾಲಿನ ಕರ್ಮ ಮಾಡು, ಬಂದುದನ್ನುಣ್ಣು. ಹರಿಯ ಚರಣದ ಅರಿವು ತಪ್ಪದಿರಲಿ. ನನ್ನದು ಎನ್ನುವ ಪ್ರತ್ಯೇಕ ಸಂಕಲ್ಪ ಬೇಡ. ವೇದದಲ್ಲಿ ಹೇಳುವಂತೆ 'ಭಗವಂತನ ಕಾಮನೆಯೇ ನನ್ನ ಕಾಮನೆಯಾಗಲಿ, ಆತನ ಇಚ್ಛೆಯೇ ನನ್ನ ಇಚ್ಛೆಯಾಗಲಿ, ಅದರಿಂದ ನನ್ನ ಕಾಮನೆ ಭಗವಂತನ ಕಾಮನೆಗೆ ಶ್ರುತಿಗೂಡಲಿ'. ಹೀಗಾದಾಗ ಅಲ್ಲಿ ಅಪಸ್ವರ ಹೊರಡುವುದಿಲ್ಲ. ನಮ್ಮ ಬಯಕೆ ಭಗವಂತನ ಇಚ್ಛೆಗೆ ಅನುರಣನವಾದಾಗ(State of Resonance) ಬಾಳಿನ ಸಂಗೀತದಲ್ಲಿ ಮಾಧುರ್ಯ ನಿರ್ಮಾಣವಾಗುತ್ತದೆ. ಕೃಷ್ಣ ಹೇಳುತ್ತಾನೆ: "ಸರ್ವಾನ್ ಅಶೇಷತಃ" ಎಂದು. ಅಂದರೆ ನಿನ್ನೆಲ್ಲಾ ಸಂಕಲ್ಪವನ್ನು ಪೂರ್ಣವಾಗಿ ಬಿಡು ಎಂದು. ಭಗವಂತನ ಇಚ್ಛೆಗೆ ವಿರುದ್ಧವಾದ ಒಂದೂ ಸಂಕಲ್ಪ ನಮ್ಮಲ್ಲಿರಬಾರದು. 'ನೀನು(ಭಗವಂತ) ಏನು ಬಯಸಿದೆಯೋ ಅದೇ ನನ್ನ ಸಂಕಲ್ಪ'-ಇದು ಒಬ್ಬ ಯೋಗಿ ಧ್ಯಾನದಲ್ಲಿ ತೊಡಗಿಸಿಕೊಳ್ಳಬೇಕಾದ ಏಕೈಕ ಸಂಕಲ್ಪ.

ಸಂಕಲ್ಪ ಎಲ್ಲಿ ಹುಟ್ಟುತ್ತದೋ ಅಲ್ಲೇ ಅದನ್ನು ತಡೆಯಬೇಕು. ಸಂಕಲ್ಪ ಹುಟ್ಟುವುದೇ ಮನಸ್ಸಿನಿಂದ! ನಾವು ನಮ್ಮ ಮನಸ್ಸಿಗೆ ನಿರಂತರ ಈ ರೀತಿ ಹೇಳಬೇಕು: "ನೀನು ಹುಚ್ಚು ಸಂಕಲ್ಪ ಮಾಡಬೇಡ, ಮಾಡಿದರೆ ಅದು ನಿನಗೆ ಸಿಗುವುದಿಲ್ಲ, ನಂತರ ಸಿಗಲಿಲ್ಲ ಎಂದು ಚಡಪಡಿಸಬೇಕಾಗುತ್ತದೆ- ಆದ್ದರಿಂದ ಈ ಹುಚ್ಚು ಸಂಕಲ್ಪಗಳನ್ನು ಬಿಡು" ಎಂದು. ಈ ರೀತಿ ಮನಸ್ಸಿಗೆ ನಿರಂತರ ಹೇಳಿ (Auto Suggestion) ಅದನ್ನು ಪಳಗಿಸಬೇಕು. ಸಾಧಕನನ್ನು ದಾರಿ ತಪ್ಪಿಸುವುದೂ ಮನಸ್ಸು, ದಾರಿ ಹೆಚ್ಚಿಸುವುದೂ ಮನಸ್ಸು. ಆದ್ದರಿಂದ ಮನಸ್ಸಿಗೆ ನಿರಂತರ ಈ ರೀತಿ ಹೇಳುತ್ತಾ ಇದ್ದರೆ ಅದು ಕೊನೆಗೆ ಅದನ್ನು ಒಪ್ಪಿಕೊಳ್ಳುತ್ತದೆ.

ನಾವು ನಮ್ಮ ಹುಚ್ಚು ಸಂಕಲ್ಪವನ್ನು ಬಿಡಬೇಕಾದರೆ ಮೊದಲು ನಮ್ಮ ಇಂದ್ರಿಯ ಸಮುದಾಯವನ್ನು ಹಿಡಿತದಲ್ಲಿಟ್ಟುಕೊಳ್ಳಬೇಕು. ನಾವು ನಮ್ಮಲ್ಲಿ ಒಳ್ಳೆಯ ಸಂಸ್ಕಾರವನ್ನು ರೂಢಿಸಿಕೊಳ್ಳಬೇಕು. ಇದಕ್ಕಾಗಿ ಹಿಂದೆ ಚಿಕ್ಕ ಮಕ್ಕಳಿಗೆ ಅನೇಕ ಆಧ್ಯಾತ್ಮಿಕ ಸಂಸ್ಕಾರವನ್ನು ಹೇಳಿಕೊಡುತ್ತಿದ್ದರು. ಚಿಕ್ಕ ವಯಸ್ಸಿನಲ್ಲಿ ಮನಸ್ಸು ಹಸಿ ಮಣ್ಣಿನಂತೆ. ಏನು ಹೇಳಿದರೂ ಅದರ ಯಥಾರ್ಥ ಗ್ರಹಣವಾಗುತ್ತದೆ. ಮನಸ್ಸಿನ ಗುಣವೆಂದರೆ ಅದನ್ನು ನಾವು ಒಂದು ಕಡೆ ನಿರ್ಬಂಧ ಮಾಡಿದಾಗ ಅದು ಇನ್ನೊಂದು ಕಡೆ ಜಾರಿ ನುಣುಚಿಕೊಳ್ಳುತ್ತದೆ. ಕೃಷ್ಣ ಹೇಳುತ್ತಾನೆ: "ಮನಸ್ಸನ್ನು ಜಾರಲು ಬಿಡಬೇಡ; ಎಲ್ಲಾ ಸಂಕಲ್ಪವನ್ನು ತ್ಯಾಗ ಮಾಡಿ ಭಗವಂತ ಒದಗಿಸಿಕೊಟ್ಟದ್ದನ್ನು ಭಗವದ್ ಪ್ರಸಾದವೆಂದು ಸ್ವೀಕರಿಸು; ಸಂತೋಷವಾಗಿ ಅದನ್ನು ಭೋಗಿಸು-ಅನುಭವಿಸು; ಇಲ್ಲದ್ದನ್ನು ಬೇಕು ಎಂದು ಬಯಸಿ ಕೊರಗಬೇಡ" ಎಂದು.

ಈ ಹಿಂದೆ ಹೇಳಿದಂತೆ ಮನಸ್ಸನ್ನು ಒಮ್ಮೆಗೇ ತಿರುಗಿಸಲು ಬರುವುದಿಲ್ಲ. ಅದನ್ನು ಬಹಳ ನಿಧಾನವಾಗಿ ತಿರುಗಿಸಬೇಕು. ಮೆಲ್ಲ-ಮೆಲ್ಲನೆ ಆ ಉತ್ಕೃಷ್ಟ ಆನಂದಕ್ಕೆ ಮನಸ್ಸನ್ನು ತಿರುಗಿಸಬೇಕು. ಇದಕ್ಕಾಗಿ "ನಿನ್ನ ವಿಶ್ಲೇಷಕ ಬುದ್ಧಿಯನ್ನು ಬಳಸು" ಎನ್ನುತ್ತಾನೆ ಕೃಷ್ಣ. ಇದಕ್ಕೆ ಛಲ ಬೇಕು, ಧೈರ್ಯ ಬೇಕು. ಗುರಿ ಮುಟ್ಟುವ ತನಕ ನಾನು ವಿಚಲಿತನಾಗಲಾರೆ ಎನ್ನುವ ಬುದ್ಧಿ(conviction), ಧೃತಿ(courage) ಬಹಳ ಮುಖ್ಯ. ಹೀಗೆ ತರ್ಕವನ್ನು ಮೀರಿ ತರ್ಕಾತೀತ ಭಗವಂತನತ್ತ ಮನಸ್ಸನ್ನು ಅಣಿಗೊಳಿಸಬೇಕು. ಮನಸ್ಸು ಮೊದಲು ನಮ್ಮ ಸ್ವರೂಪವನ್ನು

ಗುರುತಿಸಿ ಅಲ್ಲಿ ನೆಲೆನಿಂತು ಆ ನಂತರ ಸ್ವರೂಪದಲ್ಲಿರುವ ಭಗವಂತನಲ್ಲಿ ನೆಲೆ ನಿಲ್ಲಬೇಕು. ಒಮ್ಮೆ ನೆಲೆ ನಿಂತ ಮನಸ್ಸನ್ನು ಬೇರೆ ಯಾವುದೇ ಚಿಂತೆಗೆ ಒಡ್ಡದೆ ಅದನ್ನು ಅಲ್ಲೇ ನೆಲೆಗೊಳಿಸಬೇಕು.

ಯತೋ ಯತೋ ನಿಶ್ಚರತಿ ಮನಶ್ಚಂಚಲಮಸ್ಥಿರಮ್ ।
ತತಸ್ತತೋ ನಿಯಮ್ಯೈತದಾತ್ಮನ್ಯೇವ ವಶಂ ನಯೇತ್ ॥೨೬॥

ಯತಃ ಯತಃ ನಿಶ್ಚರತಿ ಮನಃ ಚಂಚಲಮ್ ಅಸ್ಥಿರಮ್ ।
ತತಃ ತತಃ ನಿಯಮ್ಯ ಏತತ್ ಆತ್ಮನಿ ಏವ ವಶಮ್ ನಯೇತ್ -ಗಟ್ಟಿಗೊಳ್ಳದೆ ಎತ್ತೆತ್ತ ಸರಿಯುವ ಬಗೆ, ಯಾವೆಡೆಯೆಲ್ಲ ಹರಿಯಿತು, ಆಯಾ ಕಡೆಯಿಂದ ಮತ್ತೆ ಹೊರಳಿಸಿ ಭಗವಂತನಲ್ಲೇ ನಿಲ್ಲುವಂತೆ ಹಿಡಿತಕ್ಕೆ ತರಬೇಕು.

ನಮ್ಮ ಮನಸ್ಸು ಬಹಳ ಚಂಚಲ. ಈ ಕಾರಣದಿಂದ ಅದು ಎಲ್ಲೆಡೆ ಹರಿಯುತ್ತಿರುತ್ತದೆ. ಅದು ಎಲ್ಲಿಎಲ್ಲಿ ಜಾರುತ್ತದೋ ಅಲ್ಲಿಅಲ್ಲಿ ಭಗವಂತನೆಂಬ ಒಡ್ಡು ಹಾಕಿ ಅದನ್ನು ಭಗವಂತನಲ್ಲಿ ನೆಲೆನಿಲ್ಲುವಂತೆ ಮಾಡಬೇಕು. ಇದಕ್ಕೆ ನಿರಂತರ ಪ್ರಯತ್ನ ಅಗತ್ಯ.

ಪ್ರಶಾಂತಮನಸಂ ಹ್ಯೇನಂ ಯೋಗಿನಂ ಸುಖಮುತ್ತಮಮ್ ।
ಉಪೈತಿ ಶಾಂತರಜಸಂ ಬ್ರಹ್ಮಭೂತಮಕಲ್ಮಷಮ್ ॥೨೭॥

ಪ್ರಶಾಂತ ಮನಸಮ್ ಹಿ ಏನಮ್ ಯೋಗಿನಮ್ ಸುಖಮ್ ಉತ್ತಮಮ್ ।
ಉಪೈತಿ ಶಾಂತರಜಸಮ್ ಬ್ರಹ್ಮಭೂತಮ್ ಅಕಲ್ಮಷಮ್ -ವಿಷಯಗಳತ್ತ ಹರಿಯದೆ ಹಾಯಾದ ಬಗೆಯವನನ್ನು, ರಜೋಗುಣದ ಬಿಸಿಯಳಿದು ತಿಳಿಯಾದವನನ್ನು, ಭಗವಂತನಲ್ಲೇ ನೆಲೆನಿಂತ ಇಂತಹ ಯೋಗಿಯನ್ನು ಸುಖದ ಸುಗ್ಗಿ ನುಗ್ಗಿ ಬರುತ್ತದೆ.

ಒಮ್ಮೆ ನಮ್ಮ ಮನಸ್ಸು ಭಗವಂತನಲ್ಲಿ ನೆಲೆ ನಿಂತಿತೆಂದರೆ ಗೊಂದಲದ ಗೂಡಾದ ಮನಸ್ಸು ಪ್ರಶಾಂತವಾಗುತ್ತದೆ. ಇದನ್ನು ಸಾಧಿಸಿದ ವ್ಯಕ್ತಿ ಎಂತಹ ಸನ್ನಿವೇಶದಲ್ಲೂ ಉದ್ವೇಗಕ್ಕೊಳಗಾಗುವುದಿಲ್ಲ. ಜೀವನದಲ್ಲಿ ನಾವು ಅನುಭವಿಸಬೇಕಾದ ನಿಜವಾದ ಶ್ರೇಷ್ಠ ಸುಖ ಏನು ಎನ್ನುವುದು ಈ ಸ್ಥಿತಿಯಲ್ಲಿ ತಿಳಿಯುತ್ತದೆ. ಮನಸ್ಸು ಸಾಮಾನ್ಯವಾಗಿ ಬಯಸುವ ರಾಜಸ ಸುಖದಲ್ಲಿ ಇರುವ ನಿರಾಶೆ ಇಲ್ಲಿ ಎಂದೂ ಇರದು. ಈ ಸ್ಥಿತಿಯಲ್ಲಿ ನಾವು ಸ್ವಚ್ಛವಾಗುತ್ತೇವೆ. ಇದು ನಿಜವಾದ ಮಡಿ. ಮನಸ್ಸಿನ ಸ್ವಚ್ಛತೆಯನ್ನು ಸಾಧಿಸದೇ ಬಾಹ್ಯ ಮಡಿ ಮಾಡುವುದರಿಂದ ಯಾವ ಉಪಯೋಗವೂ ಇಲ್ಲ. ಶುದ್ಧವಾದ ಮನಸ್ಸಿಗೆ ಯಾವುದೂ ಮೈಲಿಗೆ ಅಲ್ಲ! ಮನಸ್ಸು ಮಡಿಯಾದರೆ ಅವನು ಮೈಲಿಗೆಯಾಗುವ ಸಾಧ್ಯತೆಯೇ ಇಲ್ಲ. ಇದು ಮಾನವ ತನ್ನ ಜೀವಮಾನದಲ್ಲಿ ಪಡೆಯಬಹುದಾದ ಪರಮಾನಂದದ ಸ್ಥಿತಿ.

ಯುಂಜನ್ ಏವಂ ಸದಾತ್ಮಾನಂ ಯೋಗೀ ವಿಗತಕಲ್ಮಷಃ ।
ಸುಖೇನ ಬ್ರಹ್ಮಸಂಸ್ಪರ್ಶಮತ್ಯಂತಂ ಸುಖಮಶ್ನುತೇ ॥೨೮॥

ಯುಂಜನ್ ಏವಮ್ ಸದಾ ಆತ್ಮಾನಮ್ ಯೋಗೀ ವಿಗತ ಕಲ್ಮಷಃ ।
ಸುಖೇನ ಬ್ರಹ್ಮಸಂಸ್ಪರ್ಶಮ್ ಅತ್ಯಂತಮ್ ಸುಖಮ್ ಅಶ್ನುತೇ -- ಹೀಗೆ ಕೊಳೆಯಳಿದು ಸದಾ ಭಗವಂತನನ್ನು ಧ್ಯಾನಿಸುವ ಸಾಧಕನು ಹಾಯಾಗಿ ಭಗವದನುಭವದ ಪರಮ ಸುಖವನ್ನು ಉಣ್ಣುತ್ತಾನೆ.

ಭಗವದ್ ಅನುಭೂತಿ ಆದಾಗ ಆಗುವ ಅಂತರಂಗದ ಆನಂದವನ್ನು ಇನ್ನೊಂದು ರೀತಿಯಲ್ಲಿ ಕೃಷ್ಣ ಇಲ್ಲಿ ವಿವರಿಸಿದ್ದಾನೆ. ಕೃಷ್ಣ ಹೇಳುತ್ತಾನೆ "ಯುಂಜನ್ ಏವಂ ಸದಾತ್ಮಾನಂ ಯೋಗೀ ವಿಗತಕಲ್ಮಷಃ" ಎಂದು. ಕೃಷ್ಣನ ಈ ನುಡಿಯನ್ನು ಎರಡು ರೂಪದಲ್ಲಿ ಕಾಣಬಹುದು. ಮೊದಲನೆಯದಾಗಿ "ವಿಗತಕಲ್ಮಷ ಸನ್ ಆತ್ಮಾನಂ ಯುಂಜನ್" ಹಾಗೂ ಎರಡನೇಯದಾಗಿ "ಆತ್ಮಾನಂ ಯುಂಜನ್ ಸನ್ ವಿಗತಕಲ್ಮಷಃ". ನಾವು ಮೊದಲು ವಿಗತಕಲ್ಮಶವಾದ ಮನಸ್ಸಿನಿಂದ ಭಗವಂತನನ್ನು ಕಾಣಬೇಕು. ನಂತರ ಭಗವಂತನನ್ನು ಧ್ಯಾನ ಮಾಡುತ್ತಾ ವಿಗತಕಲ್ಮಷರಾಗಬೇಕು. ಭಗವಂತನ ಧ್ಯಾನಕ್ಕೋಸ್ಕರ ಮನಸ್ಸನ್ನು ಸ್ವಚ್ಛಗೊಳಿಸಿ ಒಮ್ಮೆ ಭಗವಂತನನ್ನು ಕಾಣಬಹುದು. ಆದರೆ ಭಗವಂತನ ಅನುಭವದಿಂದ ಕೆಳಗಿಳಿದ ತಕ್ಷಣ ತಾಮಸ ಆವೇಶ ನಮ್ಮ ಮನಸ್ಸನ್ನು ಕೆಡಿಸಬಹುದು. ಅದಕ್ಕಾಗಿ ಸದಾ ಭಗವದ್ ಅನುಭೂತಿಯಲ್ಲೇ ನೆಲೆಗೊಳ್ಳಬೇಕು. ಇದರರ್ಥ ದಿನದ ಇಪತ್ನಾಲ್ಕು ಗಂಟೆ ಧ್ಯಾನದಲ್ಲೇ ಇರಬೇಕು ಎಂದಲ್ಲ. ಬದಲಾಗಿ ಸದಾ ಭಗವಂತನ ಗುಂಗಿನಲ್ಲಿರುವುದು. ಹೀಗಿದ್ದಾಗ ಮನಸ್ಸು ನಿರಂತರ ಸ್ವಚ್ಛವಾಗಿರುತ್ತದೆ. ಹೀಗೆ ಭಗವದ್ದೃಷ್ಟಿ ಗಟ್ಟಿಗೊಂಡಾಗ ಸಾಧಕ ಅನಾಯಾಸವಾಗಿ ಭಗವಂತನನ್ನು ನೇರವಾಗಿ ಕಾಣುವ ಅತ್ಯಂತ ಸುಖಾನುಭವವನ್ನು ಪಡೆಯತ್ತಾನೆ.

ಧ್ಯಾನ ಪ್ರಕ್ರಿಯೆಯನ್ನು ವಿವರಿಸಿದ ಕೃಷ್ಣ ಮುಂದಿನ ಶ್ಲೋಕದಲ್ಲಿ ಭಗವಂತನಲ್ಲಿ ಎಂತಹ ಗುಣದ ಅನುಸಂಧಾನ ಮಾಡಬೇಕು ಎನ್ನುವುದನ್ನು ವಿವರಿಸುತ್ತಾನೆ. ದೇವರು ಎಂದರೆ ಎಲ್ಲೋ ಸತ್ಯಲೋಕದಿಂದಾಚೆಗಿನ ವೈಕುಂಠದಲ್ಲಿನ ಅಂತಃಪುರದ ಕೋಣೆಯಲ್ಲಿ ಕುಳಿತ ಒಬ್ಬ ವ್ಯಕ್ತಿ ಎಂದು ಅನುಸಂಧಾನ ಮಾಡುವುದಲ್ಲ. ದೇವರ ಬಗ್ಗೆ ನಮ್ಮ ಅನುಸಂಧಾನ ಹೇಗಿರಬೇಕು ಎನ್ನುವುದನ್ನು ಇಲ್ಲಿ ಕೃಷ್ಣ ವಿವರಿಸುತ್ತಾನೆ.

ಸರ್ವಭೂತಸ್ಥಮಾತ್ಮಾನಂ ಸರ್ವಭೂತಾನಿ ಚಾಽತ್ಮನಿ ।
ಈಕ್ಷತೇ ಯೋಗಯುಕ್ತಾತ್ಮಾ ಸರ್ವತ್ರ ಸಮದರ್ಶನಃ ॥೨೯॥

ಸರ್ವ ಭೂತ ಸ್ಥಮ್ ಆತ್ಮಾನಮ್ ಸರ್ವ ಭೂತಾನಿ ಚ ಆತ್ಮನಿ ।

ಈಕ್ಷತೇ ಯೋಗ ಯುಕ್ತ ಆತ್ಮಾ ಸರ್ವತ್ರ ಸಮದರ್ಶನಃ -ಧ್ಯಾನಯೋಗಕ್ಕೆ ಬಗೆ ಸಜ್ಜುಗೊಂಡ ಸಾಧಕ ಎಲ್ಲಾ ಜೀವಿಗಳಲ್ಲೂ ಭಗವಂತನನ್ನು ಕಾಣುತ್ತಾನೆ ಮತ್ತು ಎಲ್ಲಾ ಜೀವಿಗಳನ್ನು ಭಗವಂತನಲ್ಲಿ ಕಾಣುತ್ತಾನೆ. ಎಲ್ಲೆಡೆ ಇರುವ ಭಗವಂತ ಏಕರೂಪನೆಂದು ಕಾಣುತ್ತಾನೆ.

ನಾವು ಭಗವಂತನನ್ನು ಬ್ರಹ್ಮ ಎನ್ನುತ್ತೇವೆ, ಪರಮಾತ್ಮ ಎನ್ನುತ್ತೇವೆ. ಏನು ಹಾಗೆಂದರೆ? ಎಲ್ಲಾ ಕಾಲದಲ್ಲೂ ಎಲ್ಲಾ ದೇಶದಲ್ಲೂ ತುಂಬಿರುವ ಬೃಹತ್ತಾದದ್ದು ಬ್ರಹ್ಮ. ಎಲ್ಲಾ ಕಡೆ ವ್ಯಾಪಿಸಿರುವ ಸರ್ವ ಗುಣಪೂರ್ಣನಾಗಿ ಕಾಲತಃ, ದೇಶತಃ, ಗುಣತಃ, ಶಕ್ತಿತಃ ಅನಂತವಾಗಿರುವವ ಪರಮಾತ್ಮ. ಇಲ್ಲಿ ಕೃಷ್ಣ ಹೇಳುತ್ತಾನೆ: "ಸರ್ವಭೂತಸ್ಥಮಾತ್ಮಾನಂ" ಎಂದು. ಅಂದರೆ ಸಮಸ್ತ ಜೀವಜಾತದೊಳಗೆ ಅಂತರ್ಯಾಮಿಯಾಗಿ ಬಿಂಬರೂಪಿ ಭಗವಂತನಿದ್ದಾನೆ. ಅಷ್ಟೇ ಅಲ್ಲ "ಸರ್ವ ಭೂತಾನಿ ಚ ಆತ್ಮನಿ" ಅಂದರೆ ಸಮಸ್ತ ಜೀವಗಳೂ ಭಗವಂತನಲ್ಲಿವೆ. ಇದರ ಪೂರ್ಣ ಅರ್ಥ: 'ಭಗವಂತ ನಮ್ಮ ಒಳಗೂ ಹೊರಗೂ ತುಂಬಿದ್ದಾನೆ' ಎಂದು. ಇದು ನಾವು ಉಪಾಸನೆ ಮಾಡುವಾಗ ತಿಳಿದುಕೊಳ್ಳಬೇಕಾದ ಮುಖ್ಯವಾದ ಅಂಶ. ಒಬ್ಬ ಧ್ಯಾನಯೋಗದಲ್ಲಿರುವ ಸಾಧಕ ಭಗವಂತನ ಸರ್ವಗತತ್ವವನ್ನು ಕಾಣುವ ಬಗೆಯಿದು.

ಭಗವಂತ ಎಲ್ಲಾ ಜೀವದಲ್ಲೂ ತುಂಬಿದ್ದರೂ ಕೂಡಾ ಒಬ್ಬ ಸಾಧಕ ಆತನನ್ನು "ಸರ್ವತ್ರ ಸಮದರ್ಶನಃ"- ಅಂದರೆ ಏಕರೂಪದಲ್ಲಿ ಕಾಣುತ್ತಾನೆ. ಭಗವಂತನ ಅವತಾರ, ಆತನ ಆವೇಶ, ಸನ್ನಿಧಾನ, ಗುಣ, ಕೃತಿ, ರೂಪ ಎಲ್ಲವೂ ಅಖಂಡ. ಅದರಲ್ಲಿ ವ್ಯತ್ಯಾಸವಿಲ್ಲ. ಎಲ್ಲವುದರ ಒಳಗೂ ಹೊರಗೂ ತುಂಬಿರುವ ಆತ ಏಕರೂಪನಾಗಿದ್ದಾನೆ. ಬೈಬಲ್ ನಲ್ಲಿ ಯಾರಾದರೂ ದೇವರ ಬಗ್ಗೆ ಹೇಳುವವರು ಏನು ಹೇಳುತ್ತಾರೆ ಎನ್ನುವಲ್ಲಿ ಹೀಗೆ ಹೇಳಿದ್ದಾರೆ " **If they say 'the Kingdom is in the sky' then the birds will precede you; if they say to you 'It is in the sea' then the fish will precede you. Rather 'the Kingdom is inside of you and It is outside of you'**. ಎಲ್ಲಾ ಗ್ರಂಥದ ತಾತ್ಪರ್ಯ ಒಂದೇ. ಹೀಗೆ ಭಗವಂತ ಸರ್ವಾಂತರ್ಯಾಮಿ ಮತ್ತು ಸರ್ವಗತ ಎನ್ನುವ ಅನುಸಂಧಾನ ನಮ್ಮ ನಿತ್ಯ ಉಪಾಸನೆಯಲ್ಲಿರಬೇಕು.

ಯೋ ಮಾಂ ಪಶ್ಯತಿ ಸರ್ವತ್ರ ಸರ್ವಂ ಚ ಮಯಿ ಪಶ್ಯತಿ ।
ತಸ್ಯಾಹಂ ನ ಪ್ರಣಶ್ಯಾಮಿ ಸ ಚ ಮೇ ನ ಪ್ರಣಶ್ಯತಿ ॥೩೦॥

ಯಃ ಮಾಮ್ ಪಶ್ಯತಿ ಸರ್ವತ್ರ ಸರ್ವಮ್ ಚ ಮಯಿ ಪಶ್ಯತಿ ।
ತಸ್ಯ ಅಹಮ್ ನ ಪ್ರಣಶ್ಯಾಮಿ ಸಃ ಚ ಮೇ ನ ಪ್ರಣಶ್ಯತಿ -ಯಾರು ನನ್ನನ್ನು ಎಲ್ಲೆಡೆ ಕಾಣುತ್ತಾರೆ ಮತ್ತು ಎಲ್ಲವನ್ನೂ ನನ್ನಲ್ಲಿ ಕಾಣುತ್ತಾರೆ ಅವರಿಗೆ ನಾನು ಎರವಾಗಲಾರೆ; ಅವರೂ ನನಗೆ ಎರವಾಗಲಾರರು.

ಮುಂದುವರಿದು ಕೃಷ್ಣ ಹೇಳುತ್ತಾನೆ: "ಯಾರು ಹೀಗೆ ನನ್ನನ್ನು ಎಲ್ಲರಲ್ಲಿಯೂ ಮತ್ತು ಎಲ್ಲರನ್ನು ನನ್ನಲ್ಲಿ ಕಾಣುತ್ತಾನೋ ಅವನಿಗೆ ನಾನೆಂದೂ ಇಲ್ಲವಾಗುವುದಿಲ್ಲ. ಸದಾ ಆತನ ಯೋಗ ಕ್ಷೇಮದ ಹೊಣೆ ನನ್ನದು. ಅದೇ ರೀತಿ 'ನಾನು ಆತನ ಯೋಗಕ್ಷೇಮವನ್ನು ನೋಡಿಕೊಳ್ಳುತ್ತೇನೆ' ಎನ್ನುವ ಎಚ್ಚರ ಸದಾ ಆತನಲ್ಲಿರುತ್ತದೆ" ಎಂದು.

ಹೀಗೆ ಭಗವಂತನ ಅನ್ಯೋನ್ಯ ಸಂಬಂಧ, 'ದೇವರು ಎಂದೂ ನಮ್ಮನ್ನು ಬಿಟ್ಟು ಹಾಕುವುದಿಲ್ಲ' ಎನ್ನುವ ಎಚ್ಚರ ನಮ್ಮಲ್ಲಿ ಸದಾ ಜಾಗೃತವಾಗಿರುತ್ತದೆ. ಹಿಂದೆ ಹೇಳಿದಂತೆ ಭಗವಂತ ನಾವು ಆತನನ್ನು ಹೇಗೆ ನೋಡುತ್ತೆವೋ ಹಾಗೆ. ಈ ಕಾರಣದಿಂದ ನಮ್ಮಲ್ಲಿನ ಈ ಎಚ್ಚರದಿಂದ ಯಾವತ್ತೂ ಜೀವನದಲ್ಲಿ ಬಗೆಹರಿಯದಂತಹ ಸಮಸ್ಯೆ ನಮಗೆ ಬರುವುದಿಲ್ಲ. ಪ್ರರಾಬ್ಧಕರ್ಮದಿಂದ ಬಂದರೂ ಕೂಡಾ ಕಾಣದ ಕೈ ನಮ್ಮನ್ನು ಕೈ ಹಿಡಿದು ನಡೆಸುತ್ತಿರುವ ಅನುಭವವಾಗುತ್ತದೆ. 'ನನ್ನನ್ನು ಕಾಪಾಡುವವನಿದ್ದಾನೆ ಅವನು ನನ್ನ ಯೋಗ-ಕ್ಷೇಮವನ್ನು ನೋಡಿಕೊಳ್ಳುತ್ತಾನೆ, ನಾನೇಕೆ ಹೆದರಬೇಕು' ಎನ್ನುವ ದೈರ್ಯ ಬರುತ್ತದೆ. ಕೆಟ್ಟ ಯೋಚನೆ ದೂರವಾಗುತ್ತದೆ. ಸಾಮಾಜಿಕ ಪ್ರತಿಕ್ರೀಯೆಗಳಿಗೆ, ಟೀಕೆ-ಟಿಪ್ಪಣಿಗಳಿಗೆ, ಅಪವಾದಗಳಿಗೆ, ನಿಂದನೆಗಳಿಗೆ, ಯಾವುದಕ್ಕೂ ವಿಚಲಿತನಾಗುವುದಿಲ್ಲ. ಭಗವಂತ ಕೈಬಿಟ್ಟ ಎನ್ನುವ ಸ್ಥಿತಿ ಭಕ್ತನಿಗೆ ಎಂದೂ ಬರುವುದಿಲ್ಲ. ಭಗವಂತ ಎಂದೂ ತನ್ನ ಆತ್ಮೀಯ ಭಕ್ತನಿಂದ ದೂರವಾಗುವುದಿಲ್ಲ. ಇದಕ್ಕಾಗಿ ಭಗವಂತನನ್ನು 'ಭಕ್ತಪರಾಧೀನ' ಎನ್ನುವುದು. ಈ ಕುರಿತು ಇನ್ನಷ್ಟು ವಿವರವಾಗಿ ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸಿದ್ದಾನೆ.

ಸರ್ವಭೂತಸ್ಥಿತಂ ಯೋ ಮಾಂ ಭಜತ್ಯೇಕತ್ವಮಾಸ್ಥಿತಃ ।
ಸರ್ವಥಾ ವರ್ತಮಾನೋಽಪಿ ಸ ಯೋಗೀ ಮಯಿ ವರ್ತತೇ ॥೩೧॥

ಸರ್ವಭೂತಸ್ಥಿತಂ ಯಃ ಮಾಮ್ ಭಜತಿ ಏಕತ್ವಮ್ ಆಸ್ಥಿತಃ ।
ಸರ್ವಥಾ ವರ್ತಮಾನಃ ಅಪಿ ಸಃ ಯೋಗೀ ಮಯಿ ವರ್ತತೇ-ಎಲ್ಲಾ ಜೀವಿಗಳಲ್ಲಿರುವ ನನ್ನನ್ನು ಏಕರೀತಿಯಿಂದ ತಿಳಿದು ಪೂಜಿಸುವವನು ಯಾವ ಸ್ಥಿತಿಯಲ್ಲಿದ್ದರೂ ನನ್ನಲ್ಲಿರುತ್ತಾನೆ.

ಕೃಷ್ಣ ಹೇಳುತ್ತಾನೆ: "ಸರ್ವಗತನಾದ ಭಗವಂತ ಎಲ್ಲಾ ಕಡೆ ಏಕರೂಪವಾಗಿದ್ದಾನೆ ಎನ್ನುವ ಅನುಸಂಧಾನ ಮತ್ತು ನಿರಂತರ ಭಕ್ತಿ ಇರುವ ಸಾಧಕ, ಆತ ಹೇಗೇ ಇರಲಿ, ಅವನು ನನ್ನನ್ನು ಸೇರುವುದು ನಿಶ್ಚಿತ" ಎಂದು. ಅಪರೋಕ್ಷ ಜ್ಞಾನ ಪಡೆದವ ಭಗವಂತನಿಂದ ಎಂದೂ ದೂರ ಸರಿಯುವುದಿಲ್ಲ. ಆತ ಮೋಕ್ಷವನ್ನು ಪಡೆದು ಭಗವಂತನಲ್ಲಿ ನೆಲೆಸುತ್ತಾನೆ.

ಆತ್ಮೌಪಮ್ಯೇನ ಸರ್ವತ್ರ ಸಮಂ ಪಶ್ಯತಿ ಯೋಽರ್ಜುನ ।
ಸುಖಂ ವಾ ಯದಿ ವಾ ದುಃಖಂ ಸ ಯೋಗೀ ಪರಮೋ ಮತಃ ॥೩೨॥

ಆತ್ಮಔಪಮ್ಯೇನ ಸರ್ವತ್ರ ಸಮಮ್ ಪಶ್ಯತಿ ಯಃ ಅರ್ಜುನ ।
ಸುಖಮ್ ವಾ ಯದಿ ವಾ ದುಃಖಮ್ ಸಃ ಯೋಗೀ ಪರಮಃ ಮತಃ –ಸುಖವಿರಲಿ, ದುಃಖವಿರಲಿ, ಎಲ್ಲರ ಬೇಕು-ಬೇಡಗಳನ್ನು ತನ್ನ ಹಾಗೆಯೇ ಸಮಾನತೆಯಿಂದ ಕಾಣುವವನು, ಓ ಅರ್ಜುನಾ, ಬಹಳ ದೊಡ್ಡ ಸಾಧಕ ಎನ್ನುವುದು ತೀರ್ಮಾನ.

ಕೃಷ್ಣ ನಮಗೆ ಸಮದೃಷ್ಟಿ ಬಗ್ಗೆ ಹಿಂದೆ ಕೂಡಾ ಹೇಳಿದ್ದ. ಇಲ್ಲಿ ಮುಖ್ಯವಾಗಿ ಸಾತ್ವಿಕರೊಂದಿಗೆ, ಭಗವದ್ಭಕ್ತರೊಂದಿಗೆ ಒಬ್ಬ ಸಾಧಕ ಯಾವ ರೀತಿ ಸಮದರ್ಶನ ಬೆಳೆಸಿಕೊಳ್ಳುತ್ತಾನೆ ಎನ್ನುವುದನ್ನು ವಿವರಿಸಿದ್ದಾನೆ. ಯೋಗಿಗಳಲ್ಲಿ ಶ್ರೇಷ್ಠನಾದವನು ತನ್ನಂತೆಯೇ ಇನ್ನೊಬ್ಬರು ಎಂದು ತಿಳಿದಿರುತ್ತಾನೆ. ನಮಗೆ ಯಾವುದು ದುಃಖವಾಗುತ್ತದೋ ಅದು ಇನ್ನೊಬ್ಬರಿಗೂ ದುಃಖವನ್ನು ಕೊಡುತ್ತದೆ ಎನ್ನುವ ಸತ್ಯವನ್ನು ಆತ ಅರಿತಿರುತ್ತಾನೆ. ಎಲ್ಲರಿಗೂ ಸುಖ-ದುಃಖಗಳಿವೆ, ನನ್ನಂತೆಯೇ ಅವರು ದುಃಖವನ್ನು ಇಷ್ಟಪಡುವುದಿಲ್ಲ ಎನ್ನುವ ಎಚ್ಚರದಿಂದ ಸಾಧಕ ವ್ಯವಹರಿಸುತ್ತಾನೆ. ಯಾರು ಇನ್ನೊಬ್ಬರ ನೋವನ್ನು ತನ್ನ ನೋವಿನಷ್ಟೇ ನೋವಿನಿಂದ ಕಾಣುತ್ತಾನೋ, ಯಾರು ಇನ್ನೊಬ್ಬರ ಸಂತೋಷವನ್ನು- ಯಶಸ್ಸನ್ನು ತನ್ನ ಯಶಸ್ಸೆಂದು ತಿಳಿದು ಖುಷಿ ಪಡುತ್ತಾನೋ- ಅವನು ಬಹಳ ದೊಡ್ಡ ಯೋಗ ಸಾಧಕ.

ಭಗವದ್ಭಕ್ತರಲ್ಲಿ ಭಗವಂತನ ವಿಶೇಷ ಸನ್ನಿಧಾನವಿದೆ. ಆದ್ದರಿಂದ ಅವರ ಸುಖ-ದುಃಖಕ್ಕೆ ನಾವು ಸ್ಪಂದಿಸಿದಾಗ ಅದು ಅವರೊಳಗಿನ ಭಗವಂತನ ಪೂಜೆಯಾಗುತ್ತದೆ.

ಈ ಅಧ್ಯಾಯದಲ್ಲಿ ಇಲ್ಲಿಯವರೆಗೆ ಧ್ಯಾನದ ಬಗ್ಗೆ ಕೃಷ್ಣ ವಿಸ್ತಾರವಾಗಿ ಹೇಳಿದ. ಕೃಷ್ಣನ ಈ ವಿವರಣೆಯಲ್ಲಿ ಎಲ್ಲರಿಗೂ ಕಾಣುವ ಒಂದೇ ಒಂದು ಸರ್ವೇ ಸಾಮಾನ್ಯ ಕಷ್ಟದ ವಿಷಯವೆಂದರೆ 'ಚಂಚಲ ಮನಸ್ಸನ್ನು ಹೊಂದಿದ ನಾವು ಅದನ್ನು ನಿಯಂತ್ರಿಸಿ ಸಮದೃಷ್ಟಿ ಬೆಳೆಸಿಕೊಳ್ಳುವುದು'. ಇದು ನಿಜವಾಗಿಯೂ ಸಾಧ್ಯವೇ? ಮುಂದಿನ ಶ್ಲೋಕದಲ್ಲಿ ಅರ್ಜುನ ನಮ್ಮೆಲ್ಲರ ಪರ ಈ ಪ್ರಶ್ನೆಯನ್ನು ಕೃಷ್ಣನಲ್ಲಿ ಮಂಡಿಸುತ್ತಾನೆ.

ಅರ್ಜುನ ಉವಾಚ ।

ಯೋಽಯಂ ಯೋಗಸ್ತ್ವಯಾ ಪ್ರೋಕ್ತಃ ಸಾಮ್ಯೇನ ಮಧುಸೂದನ ।
ಏತಸ್ಯಾಹಂ ನ ಪಶ್ಯಾಮಿ ಚಂಚಲತ್ವಾತ್ ಸ್ಥಿತಿಂ ಸ್ಥಿರಾಮ್ ॥೩೩॥

ಅರ್ಜುನಃ ಉವಾಚ-ಅರ್ಜುನ ಕೇಳಿದನು:

ಯಃ ಅಯಮ್ ಯೋಗಃ ತ್ವಯಾ ಪ್ರೋಕ್ತಃ ಸಾಮ್ಯೇನ ಮಧುಸೂದನ ।

ಏತಸ್ಯ ಅಹಮ್ ನ ಪಶ್ಯಾಮಿ ಚಂಚಲತ್ವಾತ್ ಸ್ಥಿತಿಮ್ ಸ್ಥಿರಾಮ್ -- ಮಧುಸೂದನಾ, ನೀನು ಸಮದೃಷ್ಟಿಯ ಧ್ಯಾನ ಯೋಗವನ್ನು ಹೇಳಿದೆ. ನನಗನಿಸುತ್ತದೆ: ಮನಸ್ಸು ಚಂಚಲವಾದ್ದರಿಂದ ಇದರಲ್ಲಿ ಗಟ್ಟಿಯಾಗಿ ನಿಲ್ಲುವುದು ಸಾಧ್ಯವಿಲ್ಲ.

ಸಾತ್ವಿಕರಿಗೆ ಆನಂದವನ್ನು ಕೊಡುವ 'ಓ ಮಧುಸೂದನಾ' ಎಂದು ಅರ್ಜುನ ಶ್ರೀಕೃಷ್ಣನನ್ನು ಸಂಬೋಧಿಸಿ ಹೇಳುತ್ತಾನೆ: "ನೀನು ಸಂಗ್ರಹವಾಗಿ ಹೇಳಿದ ಈ ಧ್ಯಾನ ಪದ್ಧತಿಯನ್ನು ನಾವು ಅಳವಡಿಸಿಕೊಳ್ಳಲು ಹೇಗೆ ಸಾಧ್ಯ? ಧ್ಯಾನವೆಂಬುದು ಸಂಪೂರ್ಣ ಮಾನಸಿಕ ಪ್ರಕ್ರಿಯೆ. ಆದರೆ ನಮ್ಮ ಮನಸ್ಸು ಪ್ರಕ್ಷುಬ್ಧ ಮತ್ತು ಚಂಚಲ. ಇಂತಹ ಮನಸ್ಸನ್ನು ಹಿಡಿತದಲ್ಲಿಟ್ಟು ನೀನು ಹೇಳಿದ ಸ್ಥಿರವಾದ ಈ ಧ್ಯಾನಯೋಗವನ್ನು ಸಾಧಿಸುವುದು ಸಾಧ್ಯವಿಲ್ಲ" ಎನ್ನುತ್ತಾನೆ ಅರ್ಜುನ.

ಚಂಚಲಂ ಹಿ ಮನಃ ಕೃಷ್ಣ ಪ್ರಮಾಥಿ ಬಲವದ್ ದೃಢಮ್ ।
ತಸ್ಯಾಹಂ ನಿಗ್ರಹಂ ಮನ್ಯೇ ವಾಯೋರಿವ ಸುದುಷ್ಕರಮ್ ॥೩೪॥

ಚಂಚಲಂ ಹಿ ಮನಃ ಕೃಷ್ಣ ಪ್ರಮಾದಿ ಬಲ ವತ್ ದೃಢಮ್ ।
ತಸ್ಯ ಅಹಮ್ ನಿಗ್ರಹಮ್ ಮನ್ಯೇ ವಾಯೋಃ ಇವ ಸು ದುಷ್ಕರಮ್ -- ಕೃಷ್ಣಾ, ಬಗೆ ಚಂಚಲವಲ್ಲವೇ? ನಮ್ಮನ್ನು ಕಂಗೆಡಿಸಿಬಿಡುವಷ್ಟು ಗಟ್ಟಿ, ಬಲಶಾಲಿ. ಅದನ್ನು ಬಿಗಿ ಹಿಡಿಯುವುದೆಂದರೆ ಗಾಳಿಯನ್ನು ಬಿಗಿ ಹಿಡಿದಂತೆ ಎಂದು ನನ್ನ ಭಾವನೆ.
ಮನಸ್ಸು ತುಂಬಾ ಚಂಚಲ, ಅದು ವಿಷಯದಿಂದ ವಿಷಯಕ್ಕೆ ಹಾರುತ್ತಿರುತ್ತದೆ. ನನ್ನ ಮನಸ್ಸು ಸದಾ ನನ್ನನ್ನು ಮಣಿಸುತ್ತಿದೆ ಆದರೆ ನಾನು ಅದನ್ನು ಮಣಿಸಲಾಗುತ್ತಿಲ್ಲ. ತನಗೆ ಬೇಕಾದಂತೆ ಇನ್ನೊಬ್ಬರನ್ನು ಬಗ್ಗು ಬಡಿಯುವ ಸ್ವಭಾವ ಮನಸ್ಸಿನದು. ನಮ್ಮ ಭಗವದ್ ಸಂಕಲ್ಪವನ್ನು ಅದು ನುಚ್ಚುನೂರು ಮಾಡಿ ತನ್ನ ಸ್ವಾಧೀನ ಮಾಡಿಕೊಂಡು ಬಿಡುತ್ತದೆ. ಇಂತಹ ಮನಸ್ಸನ್ನು ಸಾಮಾನ್ಯ ಮನುಷ್ಯ ನಿಗ್ರಹ ಮಾಡುವುದು ಹೇಗೆ? ಬೀಸುವ ಗಾಳಿಯನ್ನು ಹೇಗೆ ಮುಷ್ಠಿಯಲ್ಲಿ ಹಿಡಿಯುವುದು ಅಸಾಧ್ಯವೋ ಹಾಗೇ ಮನಸ್ಸನ್ನು ನಿಗ್ರಹ ಮಾಡುವುದು ಅಸಾಧ್ಯ ಎನ್ನುವುದು ನನ್ನ ಭಾವನೆ ಎನ್ನುತ್ತಾನೆ ಅರ್ಜುನ.

ಅರ್ಜುನನ ಈ ಪ್ರಶ್ನೆ ಭಾಗಶಃ ನಮ್ಮ ಪ್ರತಿಯೊಬ್ಬ ಓದುಗರಿಗೂ ಈ ಅಧ್ಯಾಯದ ಇಲ್ಲಿಯ ತನಕದ ಭಾಗವನ್ನು ಓದುವಾಗ ಮನಸ್ಸಿಗೆ ಬಂದಿರುತ್ತದೆ. “ಇದೆಲ್ಲಾ ನಮ್ಮಂತವರಿಗಲ್ಲ” ಅಥವಾ “ಇದು ನಮ್ಮಿಂದ ಸಾಧ್ಯವಿಲ್ಲ” ಎನ್ನುವುದು ಸಾಮಾನ್ಯವಾಗಿ ನಮ್ಮ ಮನಸ್ಸಿಗೆ ಬರುವ ಮೊದಲ ವಿಚಾರ. ಈ ಕಾರಣವನ್ನು ತಿಳಿದೇ ಇಲ್ಲಿ ನಮ್ಮೆಲ್ಲರ ಪ್ರತಿನಿಧಿ ‘ನರ’ ನಾರಾಯಣನನ್ನು ಈ ರೀತಿ ಪ್ರಶ್ನಿಸಿದ್ದಾನೆ. ಈಗ ನರನ ಈ ಪ್ರಶ್ನೆಗೆ ಕೃಷ್ಣ ಏನೆಂದು ಉತ್ತರಿಸುತ್ತಾನೆ ಎಂದು ತಿಳಿಯುವ ಕರ್ಣಕುತೂಹಲ ನಿಮಗೆಲ್ಲರಿಗೂ ಮೂಡಿರುತ್ತದೆ. ಏಕೆಂದರೆ ನಮಗೆ ಆ ನಮ್ಮ ಚಂಚಲ ಮನಸ್ಸನ್ನು ಮಣಿಸಬೇಕು, ಮಣಿಸಿ ಭಗವಂತನಲ್ಲಿ ನೆಲೆ ನಿಲ್ಲಿಸಬೇಕು ಎನ್ನುವ ಸಂಕಲ್ಪವಿದೆ. ಆದರೆ ಆ ಮನಸ್ಸು ಮಹಾ ಬಲಶಾಲಿ ಎನ್ನುವ ಭಯವಿದೆ! ಬನ್ನಿ ಆ ಮಧುಸೂದನ ನಮ್ಮ ಪ್ರಶ್ನೆಗೆ ಏನೆಂದು ಉತ್ತರಿಸಿದ ಎಂದು ಈ ಅಧ್ಯಾಯದ ಮುಂದಿನ ಭಾಗದಲ್ಲಿ ನೋಡೋಣ.

ಭಗವಾನುವಾಚ ।
ಅಸಂಶಯಂ ಮಹಾಬಾಹೋ ಮನೋ ದುರ್ನಿಗ್ರಹಂ ಚಲಮ್ ।
ಅಭ್ಯಾಸೇನ ತು ಕೌಂತೇಯ ವೈರಾಗ್ಯೇಣ ಚ ಗೃಹ್ಯತೇ ॥೩೫॥

ಭಗವಾನ್ ಉವಾಚ-ಭಗವಂತ ಹೇಳಿದನು:
ಅಸಂಶಯಮ್ ಮಹಾಬಾಹೋ ಮನಃ ದುರ್ನಿಗ್ರಹಮ್ ಚಲಮ್ ।

ಅಭ್ಯಾಸೇನ ತು ಕೌಂತೇಯ ವೈರಾಗ್ಯೇಣ ಚ ಗೃಹ್ಯತೇ –ಮಹಾವೀರಾ, ಖಂಡಿತಾ ಹೌದು; ಬಗೆ ಚಪಲವಾದದ್ದು, ಹಿಡಿತಕ್ಕೆ ಸಿಗದ್ದು. ಆದರೆ ಕೌಂತೇಯಾ, ಮರಳಿಮರಳಿ ಯತ್ನಿಸುವುದರಿಂದ ಮತ್ತು ವೈರಾಗ್ಯದಿಂದ ಅದನ್ನು ಬಿಗಿಹಿಡಿಯಬಹುದು.

ಕೃಷ್ಣ ಹೇಳುತ್ತಾನೆ: "ನೀನು ಹೇಳುವುದರಲ್ಲಿ ಯಾವ ಸಂಶಯವೂ ಇಲ್ಲ. ಮನಸ್ಸನ್ನು ತಡೆ ಹಿಡಿಯುವುದು ಸುಲಭದ ಕೆಲಸವಲ್ಲ, ಆದರೆ ಅಭ್ಯಾಸ ಮತ್ತು ವೈರಾಗ್ಯದಿಂದ ಇದನ್ನು ಕ್ರಮೇಣವಾಗಿ ಸಾಧಿಸಬಹುದು" ಎಂದು. ನಾವು ಪ್ರಯತ್ನವಿಲ್ಲದೆ ಏನನ್ನೂ ಸಾಧಿಸಲು ಸಾಧ್ಯವಿಲ್ಲ. ಪ್ರತಿಯೊಂದಕ್ಕೂ ಪ್ರಯತ್ನ ಬೇಕು. ನಾವು ನಮ್ಮ ಮನಸ್ಸು ಹೇಳಿದಂತೆ ಕುಣಿಯುವ ಅಭ್ಯಾಸ ಮಾಡಿಕೊಂಡು ಬಿಟ್ಟಿದ್ದೇವೆ. ಅದನ್ನು ಬಿಟ್ಟು ನಾವು ಹೇಳಿದಂತೆ ಮನಸ್ಸು ಕೇಳುವಂತೆ ಮಾಡುವ ಪ್ರಯತ್ನವನ್ನು ನಾವೆಂದೂ ಮಾಡಿರುವುದಿಲ್ಲ. ಇಲ್ಲಿ ಕೃಷ್ಣ ವೈರಾಗ್ಯ ಮತ್ತು ಅಭ್ಯಾಸ ಎನ್ನುವ ಎರಡು ವಿಚಾರವನ್ನು ಒತ್ತುಕೊಟ್ಟು ಹೇಳುತ್ತಾನೆ. ವೈರಾಗ್ಯ ಎಂದರೆ ಯಾವುದರ ಕಡೆ ಮನಸ್ಸು ಹರಿಯಬಾರದೋ ಅದನ್ನು ಮನಸ್ಸಿಗೆ ಉಣಿಸದೇ(Feed) ದೂರವಿಡುವುದು. ನಮಗೆ ದೇವರು ಯಾವುದು ಒಳ್ಳೆಯದು ಯಾವುದು ಕೆಟ್ಟದ್ದು ಎಂದು ತಿಳಿದುಕೊಳ್ಳುವ ಬುದ್ಧಿ ಕೊಟ್ಟಿದ್ದಾನೆ. ಆ ಬುದ್ಧಿಯನ್ನು ಉಪಯೋಗಿಸಿ ನಮ್ಮ ಮನಸ್ಸನ್ನು ಕೆಟ್ಟದ್ದರಿಂದ ದೂರವಿರಿಸುವುದು. ಕೆಟ್ಟದ್ದನ್ನು ಮನಸ್ಸಿಗೆ ಪರಿಚಯ ಮಾಡಿಕೊಡದೇ ಇರುವುದು. ಹೀಗೆ ಯಾವುದು ನಮ್ಮ ಬೆಳವಣಿಗೆಗೆ ಬಾಧಕವೋ ಅದನ್ನು ಮನಸ್ಸಿನಿಂದ ದೂರವಿಡುವುದು ವೈರಾಗ್ಯ. ಇದರ ಜೊತೆಗೆ ನಿರಂತರವಾಗಿ ಏಕಾಗ್ರತೆಗೆ ಬೇಕಾದ ಅಭ್ಯಾಸವನ್ನು ತಪ್ಪದೇ ಮಾಡುವುದು. ಇದರಿಂದ ನಾವು ಮನಸ್ಸನ್ನು ಖಂಡಿತವಾಗಿ ನಿಯಂತ್ರಿಸಬಹುದು ಎನ್ನುತ್ತಾನೆ ಕೃಷ್ಣ.

ಸಾಮಾನ್ಯವಾಗಿ ನಾವು ನಮ್ಮ ಮನಸ್ಸಿಗೆ ಪ್ರತೀದಿನ ಬೇಡದ ತರಬೇತಿಯನ್ನೇ ಕೊಡುತ್ತೇವೆ. ಉದಾಹರಣೆಗೆ ನಮ್ಮ ಅಮೂಲ್ಯವಾದ ಸಮಯದಲ್ಲಿ ದೂರದರ್ಶನದಲ್ಲಿ ಬರುವ ಯಾವುದೋ ದೈನಂದಿನ ದಾರಾವಾಹಿ, ಸಿನಿಮ ಇತ್ಯಾದಿ ವಿಷಯದಲ್ಲಿ ನಮ್ಮ ಮನಸ್ಸನ್ನು ಸಂಪೂರ್ಣ ತೊಡಗಿಸಿಕೊಳ್ಳುತ್ತೇವೆ. ನಮಗೆ ಆಧ್ಯಾತ್ಮಿಕ ಗ್ರಂಥಗಳನ್ನು ಓದಲು ಸಮಯವೇ ಇರುವುದಿಲ್ಲ! ದೇವರ ಪೂಜೆ ಮಾಡುವಾಗ ಕೂಡಾ ನಮಗೆ ಆ ದಾರಾವಾಹಿಯ ಮುಂದಿನ ಭಾಗದ ಚಿಂತೆ. ನಾವು ರಾತ್ರಿ ಮಲಗುವಾಗ ಯಾವುದೋ ಕೆಟ್ಟ ಪುಸ್ತಕವನ್ನು ಓದಿ, ಕೆಟ್ಟ ದಾರಾವಾಹಿಯನ್ನು ನೋಡಿ ಮಲಗುವ ಬದಲು, ಒಳ್ಳೆಯ ಆಧ್ಯಾತ್ಮಿಕ ಗ್ರಂಥವನ್ನು ಓದುವ ಅಭ್ಯಾಸವನ್ನು ಮಾಡಿಕೊಂಡು ನಮಗೆ ಬೇಡವಾದ ವಿಷಯದತ್ತ ವೈರಾಗ್ಯ ಸಾಧಿಸಬೇಕು. ಇದು ಕೇವಲ ಒಂದು ಉದಾಹರಣೆಯಷ್ಟೆ. ನಾವು ನಮ್ಮ ದೈನಂದಿನ ಚಟುವಟಿಕೆಯನ್ನು ಸೂಕ್ಷ್ಮವಾಗಿ ಗಮನಿಸಿದರೆ ನಮಗೆ ಇಂತಹ ಸಾವಿರ ಉದಾಹರಣೆಗಳು ಸಿಗುತ್ತವೆ.

ಮನಸ್ಸು ತನಗೆ ತಿಳಿಯದ ವಿಷಯದತ್ತ ಹೆಚ್ಚು ಗಮನ ಕೊಡುವುದಿಲ್ಲ. ಆದರೆ ಒಮ್ಮೆ ರುಚಿ ನೋಡಿದರೆ ಅದು ನಿಮ್ಮನ್ನು ಬಿಡುವುದಿಲ್ಲ. ಇದಕ್ಕೆ ಉತ್ತಮ ಉದಾಹರಣೆ ಮದ್ಯ ಸೇವನೆ. ಎಂದೂ ಮದ್ಯ ಸೇವನೆ ಮಾಡದವನಿಗೆ ಮದ್ಯ ಅಸಹ್ಯವಾಗಿ ಕಾಣುತ್ತದೆ. ಆದರೆ ಒಮ್ಮೆ ಒತ್ತಾಯದಿಂದ ಬೇಡದ ಮದ್ಯವನ್ನು ಸೇವಿಸಿ ನಮ್ಮ ಮನಸ್ಸಿಗೆ ಅದರ ಪರಿಚಯ ಮಾಡಿಸಿದಾಗ ನಮ್ಮ ಮನಸ್ಸು "ಹೇಗೂ ಒಮ್ಮೆ ಕುಡಿದಿದ್ದೀಯ ಇನ್ನೊಮ್ಮೆ ಕುಡಿದರೆ ಏನೂ ಆಗುವುದಿಲ್ಲ-ಕುಡಿ" ಎಂದು ಹೇಳುತ್ತದೆ! ಇದರ ಪರಿಣಾಮ ಏನು ಎನ್ನುವುದನ್ನು ಇಲ್ಲಿ ವಿವರಿಸಬೇಕಾಗಿಲ್ಲ.

ನಮ್ಮ ಇನ್ನೊಂದು ಮಹಾ ತಪ್ಪು ಎಂದರೆ ಬೇಡದ ವಿಷಯದಲ್ಲಿ ತಲೆ ಹಾಕುವುದು. "ಯಾರೋ ಏನೋ ಮಾಡಿದರಂತೆ"-ಈ ರೀತಿ ಒಂದು ಮಾತು ನಮ್ಮ ಕಿವಿಗೆ ಬಿದ್ದಾಗ ನಾವು ನಮಗೆ ಆ ವಿಚಾರವನ್ನು ತಿಳಿಯುವುದರಿಂದ ಏನು ಉಪಯೋಗ ಎಂದು ಯೋಚಿಸದೆ ಆ ವಿಷಯಕ್ಕೆ ತಲೆ ಹಾಕುತ್ತೇವೆ. ಒಮ್ಮೆ ತಲೆ ಹಾಕಿದರೆ ಮತ್ತೆ ಮನಸ್ಸು ಅದನ್ನು ಬಿಡುವುದಿಲ್ಲ. ಎಲ್ಲವನ್ನೂ ಬಿಟ್ಟು ಆ ವಿಷಯದ ಬೆನ್ನು ಹತ್ತುತ್ತದೆ. ಆದ್ದರಿಂದ ಒಂದು ವಿಷಯಕ್ಕೆ ತಲೆ ಹಾಕುವ ಮೊದಲು ಆ ವಿಷಯದ ಬಗ್ಗೆ ಬುದ್ಧಿಪೂರ್ವಕವಾಗಿ ನಿರ್ಧಾರ ತೆಗೆದುಕೊಂಡು ಮನಸ್ಸು ಇಲ್ಲ ಸಲ್ಲದ ವಿಚಾರದ ಹಿಂದೆ ಓಡದಂತೆ ತಡೆಹಿಡಿಯಬೇಕು. ಇದಕ್ಕೆ ಉತ್ತಮ ದೃಷ್ಟಾಂತ ಗ್ರೀಕ್ ದೇಶದ ಸೋಕ್ರಾಟೆಸ್ ಎನ್ನುವ ವಿಚಾರವಾಧಿಯ ಮೂರು ಹಂತದ ಸೋಸುವಿಕೆ ಎನ್ನುವ ಕಥೆ(**The Socrates Triple Filter Test**). ಒಮ್ಮೆ ಸೋಕ್ರಾಟೆಸ್ ನ ಒಬ್ಬ ಪರಿಚಯದ ವ್ಯಕ್ತಿ ಬಂದು ಸೋಕ್ರಾಟೆಸ್ ನಲ್ಲಿ ಈ ರೀತಿ ಹೇಳುತ್ತಾನೆ: "ನಾನು ನಿನ್ನ ಮಿತ್ರನ ಬಗ್ಗೆ ಏನು ಕೇಳಿದೆ ಗೊತ್ತಾ?( **Do you know what I just heard about your friend?**)" ಎಂದು. ತಕ್ಷಣ ಸೋಕ್ರಾಟೆಸ್ ಹೇಳುತ್ತಾನೆ "ಸ್ವಲ್ಪ ನಿಲ್ಲು (**Hold on a minute**); ನೀನು ನನ್ನ ಮಿತ್ರನ ಬಗ್ಗೆ ಏನನ್ನಾದರೂ ಹೇಳುವ ಮೊದಲು ನಾನು ಮೂರು ವಿಚಾರವನ್ನು ತಿಳಿಯ ಬಯಸುತ್ತೇನೆ. ಮೊದಲಿಗೆ ನೀನು ಹೇಳಲು ಹೊರಟಿರುವ ವಿಚಾರದ ಬಗ್ಗೆ ನಿನಗೆ ನೈಜ ಮಾಹಿತಿ ಇದೆಯೋ?(**Have you made absolutely sure that what you are about to tell me is true?**)". ಆಗ ಆ ವ್ಯಕ್ತಿ ಹೇಳುತ್ತಾನೆ: " ಇಲ್ಲ.... ಆದರೆ ನಾನು ಈ ವಿಚಾರವನ್ನು ಕೇಳಿಸಿಕೊಂಡೆ...(**"No, actually I just heard about it and...**)" ಎಂದು. ಈಗ ಸೋಕ್ರಾಟೆಸ್ ಕೇಳುತ್ತಾನೆ: " ಅಂದರೆ ನಿನಗೆ ಆ ವಿಚಾರ ಸರಿಯಾಗಿ ತಿಳಿದಿಲ್ಲ(**So you don't really know if it's true or not**), ಇರಲಿ, ನೀನು ಹೇಳಬೇಕೆಂದಿರುವ ವಿಚಾರ ತುಂಬಾ ಒಳ್ಳೆಯ ವಿಚಾರವೋ?( **Is what you are about to tell me about my friend something good?**)". ಆಗ ಆ ವ್ಯಕ್ತಿ ಹೇಳುತ್ತಾನೆ: "ಅಲ್ಲ ಅದು ಒಳ್ಳೆಯ ವಿಚಾರವಲ್ಲ-ವ್ಯತಿರಿಕ್ತ(**No, on the contrary...**)" ಎಂದು. ಕೊನೆಯದಾಗಿ ಸೋಕ್ರಾಟೆಸ್ ಕೇಳುತ್ತಾನೆ: "ನೀನು ಹೇಳಲು ಹೊರಟಿರುವ ವಿಚಾರ ನನಗೆ ಉಪಯೋಗಕ್ಕೆ ಬರುವ ವಿಚಾರವೋ?( **Is what you want to tell me about my friend going to be useful to me?**)". ಆಗ ಆ ವ್ಯಕ್ತಿ ಹೇಳುತ್ತಾನೆ "ಅಲ್ಲ (**No, not really**)" ಎಂದು. ಈಗ ಸೋಕ್ರಾಟೆಸ್ ಹೇಳುತ್ತಾನೆ "ನೀನು ಹೇಳಲು ಹೊರಟಿರುವ ವಿಚಾರ ನಿಜವಲ್ಲ, ಒಳ್ಳೆಯ ವಿಚಾರವಲ್ಲ, ಉಪಯೋಗಕ್ಕೆ ಬರುವ ವಿಚಾರವೂ ಅಲ್ಲ. ಮತ್ತೆ ಏಕೆ ನನಗೆ ಹೇಳುತ್ತೀಯ?( **if what you want to tell me is neither true nor good nor even useful, why tell it to me at all**)".

ಸ್ನೇಹಿತರೇ, ಇಲ್ಲಿ ನಾವು ಕಲಿಯಬೇಕಾದ ವಿಚಾರವೇನೆಂದರೆ ಮನಸ್ಸನ್ನು ಇಲ್ಲ ಸಲ್ಲದ ವಿಚಾರದಲ್ಲಿ ತೊಡಗಿಸುವ ಮೊದಲು ವಿಷಯವನ್ನು ಮೂರು ಬಾರಿ ಸೋಸುವುದನ್ನು ಕಲಿಯಿರಿ. ಬೇಡದ ವಿಚಾರದಲ್ಲಿ ವೈರಾಗ್ಯವನ್ನು ತಾಳಿ ಮತ್ತು ಮನಸ್ಸನ್ನು ಏಕಾಗ್ರಮಾಡುವ ಸಾಧನೆಯನ್ನು ಮನಸ್ಸಿಗೆ ಅಭ್ಯಾಸ ಮಾಡಿಸಿ. ಈ ಮಾರ್ಗದಲ್ಲಿ ಸಾಗಿದವರಿಗೆ ಧ್ಯಾನಯೋಗ ಎಂದೂ ಅಸಾಧ್ಯವಲ್ಲ.

ಅಸಂಯತಾತ್ಮನಾ ಯೋಗೋ ದುಷ್ಪ್ರಾಪ ಇತಿ ಮೇ ಮತಿಃ ।
ವಶ್ಯಾತ್ಮನಾ ತು ಸತತಂ ಶಕ್ಯೋಽವಾಪ್ತುಮಶೇಷತಃ ॥೩೬॥

ಅಸಂಯತ ಆತ್ಮನಾ ಯೋಗಃ ದುಷ್ಪ್ರಾಪಃ ಇತಿ ಮೇ ಮತಿಃ ।
ವಶ್ಯ ಆತ್ಮನಾ ತು ಸತತಂ ಶಕ್ಯಃ ಅವಾಪ್ತುಮ್ ಅಶೇಷತಃ –ಬಗೆ ಬಿಗಿಗೊಳಿಸದವನಿಗೆ ಸಮಾಧಿ ಸಿಗುವಂತದ್ದಲ್ಲ ಎಂದು ನನ್ನ ತೀರ್ಮಾನ. ಬಗೆಯನ್ನು ಸದಾ ಹಿಡಿತದಲ್ಲಿಟ್ಟವನು ಸಮಗ್ರವಾಗಿ ಸಮಾಧಿಯನ್ನು ಸಾಧಿಸಬಲ್ಲ.

ಯಾರು ತನ್ನ ಸೋಮಾರಿತನದಿಂದ, ಕೆಟ್ಟ ಲೌಕಿಕ ಅಭಿಲಾಷೆಯಿಂದ ಈ ರೀತಿ ಪ್ರಯತ್ನ ಮಾಡುವುದಿಲ್ಲವೋ ಅವನಿಗೆ ಸಮಾಧಿ ಎಂದೂ ದಕ್ಕುವುದಿಲ್ಲ. ವೈರಾಗ್ಯ ಮತ್ತು ಅಭ್ಯಾಸವೆಂಬ ಉಪಾಯದಿಂದ ಮನಸ್ಸನ್ನು ಮಣಿಸಿ ನಮಗೆ ಬೇಕಾದಂತೆ ಆ ಮನಸ್ಸಿನಿಂದ ಕೆಲಸವನ್ನು ಮಾಡಿಸಿಕೊಳ್ಳಬೇಕು. ಹೀಗೆ ಮಾಡಿದಾಗ ಸಮಾಧಿಯನ್ನು ಸಾಧಿಸಬಹುದು ಎನ್ನುವ ಭರವಸೆಯನ್ನು ಕೃಷ್ಣ ಇಲ್ಲಿ ಕೊಟ್ಟಿದ್ದಾನೆ.

ಕೃಷ್ಣನ ಈ ಉತ್ತರದಲ್ಲಿ ನಮಗೆ ಧ್ಯಾನಕ್ಕೆ ಬೇಕಾದ ಉಪಾಯ ದೊರಕಿತು. ಆದರೆ ಈಗ ನಮ್ಮೆಲ್ಲರಿಗೆ ಇನ್ನೊಂದು ಪ್ರಶ್ನೆ ಎದುರಾಗುತ್ತದೆ. ಅದೇನೆಂದರೆ ಸಂಸಾರದಲ್ಲಿರುವ ನಾವು ಒಂದು ವೇಳೆ ಸಾಧನೆಯ ಹಾದಿಯಲ್ಲಿ ಪೂರ್ಣ ಸಮಾಧಿಯನ್ನು ಸಾಧಿಸದೇ ಮಧ್ಯದಲ್ಲೇ ನಿಂತಿದ್ದರೆ ಅಥವಾ ಅರ್ಧ ಸಾಧನೆಯ ನಂತರ ನನ್ನ ಈ ಜನ್ಮ ಕೊನೆಗೊಂಡರೆ ಆಗ ನನ್ನ ಪಾಡೇನು? ಈ ಜನ್ಮದ ಸಾಧನೆ ವ್ಯರ್ಥವೋ? ನಾನು ಭಗವಂತನನ್ನು ಸೇರುವುದು ಅಸಾಧ್ಯವೋ? ನಮ್ಮ ಈ ಪ್ರಶ್ನೆಯನ್ನೇ ಮುಂದಿನ ಶ್ಲೋಕದಲ್ಲಿ ಅರ್ಜುನ ಕೃಷ್ಣನಲ್ಲಿ ಕೇಳುತ್ತಾನೆ.

ಅರ್ಜುನ ಉವಾಚ ।
ಅಯತಿಃ ಶ್ರದ್ಧಯೋಪೇತೋ ಯೋಗಾಚ್ಚಲಿತಮಾನಸಃ ।
ಅಪ್ರಾಪ್ಯ ಯೋಗಸಂಸಿದ್ಧಿಂ ಕಾಂ ಗತಿಂ ಕೃಷ್ಣ ಗಚ್ಛತಿ ॥೩೭॥

ಅರ್ಜುನಃ ಉವಾಚ-ಅರ್ಜುನ ಕೇಳಿದನು:
ಅಯತಿಃ ಶ್ರದ್ಧಯಾ ಉಪೇತಃ ಯೋಗಾತ್ ಚಲಿತ ಮಾನಸಃ ।
ಅಪ್ರಾಪ್ಯ ಯೋಗಸಂಸಿದ್ಧಿಮ್ ಕಾಮ್ ಗತಿಮ್ ಕೃಷ್ಣ ಗಚ್ಛತಿ –ಕೃಷ್ಣಾ, ಶ್ರದ್ಧೆಯಿದೆ- ಪ್ರಯತ್ನಿಸುವುದಾಗಲಿಲ್ಲ. ಧ್ಯಾನಯೋಗದಿಂದ ಬಗೆ ಕದಲಿದೆ. ಯೋಗಸಿದ್ಧಿಯನ್ನು ಪಡೆಯಲಾಗದ ಇಂತವನ ಪಾಡೇನು?

ಯೋಗದ ಸಾಧನೆಯಲ್ಲಿ ಸಾಧನೆ ಮಾಡಿದ, ಧ್ಯಾನ ಮಾಡುವುದಕ್ಕೂ ಪ್ರಯತ್ನ ಮಾಡಿದ, ಒಂದು ಹಂತದವರೆಗೆ ಶ್ರದ್ದೆಯಿಂದ ಏಕಾಗ್ರತೆಗೆ ಪ್ರಯತ್ನಿಸಿದ, ಯಾವುದೋ ಕಾರಣದಿಂದ ಪೂರ್ಣ ಗುರಿ ತಲುಪಲಿಲ್ಲ-ಅಂತವನ ಪಾಡೇನು? ಇಂತವರಿಗೆ ಸಿದ್ಧಿ ಲಭಿಸದೇ?

ಕಚ್ಚಿನ್ನೋಭಯವಿಭ್ರಷ್ಟಶ್ಛಿನ್ನಾಭ್ರಮಿವ ನಶ್ಯತಿ ।
ಅಪ್ರತಿಷ್ಠೋ ಮಹಾಬಾಹೋ ವಿಮೂಢೋ ಬ್ರಹ್ಮಣಃ ಪಥಿ ॥೩೮॥

ಕಚ್ಚಿತ್ ನ ಉಭಯ ವಿಭ್ರಷ್ಟಃ ಛಿನ್ನ ಅಭ್ರಮ್ ಇವ ನಶ್ಯತಿ ।
ಅಪ್ರತಿಷ್ಠಃ ಮಹಾಬಾಹೋಃ ವಿಮೂಢಃ ಬ್ರಹ್ಮಣಃ ಪಥಿ –ಓ ಮಹಾಬಾಹೋ, ನೆಲೆಗಾಣದೆ, ಭಗವಂತನ ದಾರಿಯಲ್ಲಿ ಗುರಿತಪ್ಪಿದ ಅವನು ಇಲ್ಲೂ ಇಲ್ಲದೆ ಅಲ್ಲೂ ಸಲ್ಲದೆ ತುಂಡು ಮೋಡದಂತೆ ಮರೆಯಾಗುವನೆ?

ಇಂತವರ ಬದುಕು ಇಹವೂ ಇಲ್ಲದೆ, ಪರವೂ ಇಲ್ಲದೆ, ಒಂದು ತುಣುಕು ಮೋಡದಂತೆ ಆ ಕಡೆ ನೆರಳೂ ಆಗದೆ, ಈಚೆ ಮಳೆಯೂ ಸುರಿಸದೆ ಯಾವುದಕ್ಕೂ ಉಪಯೋಗವಿಲ್ಲದೆ ವ್ಯರ್ಥವಾಗಿ ಹೋಗುವುದೋ? ಜ್ಞಾನ ಬಲ ಇಚ್ಛಾ ಸ್ವರೂಪನಾದ(ಮಹಾಬಾಹೋಃ) ನೀನು ಅಂತಹ ವಯವಿಭ್ರಷ್ಟರನ್ನು ಏನು ಮಾಡುತ್ತೀಯ?

ಏತನ್ಮೇ ಸಂಶಯಂ ಕೃಷ್ಣ ಛೇತ್ತುಮರ್ಹಸ್ಯಶೇಷತಃ ।
ತ್ವದನ್ಯಃ ಸಂಶಯಸ್ಯಾಸ್ಯ ಛೇತ್ತಾ ನ ಹ್ಯುಪಪದ್ಯತೇ ॥೩೯॥

ಏತತ್ ಮೇ ಸಂಶಯಮ್ ಕೃಷ್ಣ ಛೇತ್ತುಮ್ ಅರ್ಹಸಿ ಅಶೇಷತಃ ।
ತ್ವತ್ ಅನ್ಯಃ ಸಂಶಯಸ್ಯ ಅಸ್ಯ ಛೇತ್ತಾ ನ ಹಿ ಉಪಪದ್ಯತೇ- ಕೃಷ್ಣಾ, ನನ್ನ ಈ ಗೊಂದಲವನ್ನು ಪೂರ್ತಿಯಾಗಿ ನೀನೇ ಪರಿಹರಿಸಬೇಕು. ನೀನಲ್ಲದೆ ಇನ್ನಾರೂ ಇಂತಹ ಸಂಶಯವನ್ನು ಪರಿಹರಿಸಲಾರರು ಎಂದು ಅರ್ಜುನ ಕೃಷ್ಣನನ್ನು ಕೇಳುತ್ತಾನೆ.

ಭಗವಾನುವಾಚ ।
ಪಾರ್ಥ ನೈವೇಹ ನಾಮುತ್ರ ವಿನಾಶಸ್ತಸ್ಯ ವಿದ್ಯತೇ ।
ನಹಿ ಕಲ್ಯಾಣಕೃತ್ ಕಶ್ಚಿದ್ ದುರ್ಗತಿಂ ತಾತ ಗಚ್ಛತಿ ॥೪೦॥

ಭಗವಾನ್ ಉವಾಚ-ಭಗವಂತ ಹೇಳಿದನು:
ಪಾರ್ಥ ನ ಏವ ಇಹ ನ ಅಮುತ್ರ ವಿನಾಶಃ ತಸ್ಯ ವಿದ್ಯತೇ ।
ನ ಹಿ ಕಲ್ಯಾಣಕೃತ್ ಕಶ್ಚಿತ್ ದುರ್ಗತಿಮ್ ತಾತ ಗಚ್ಛತಿ- ಪಾರ್ಥಾ, ಅವನ ಸಾಧನೆ ವ್ಯರ್ಥವಲ್ಲ, ಇಹದಲ್ಲಿ ಮತ್ತು ಪರದಲ್ಲಿ. ಅಪ್ಪಾ, ಒಳಿತನ್ನು ಮಾಡುವವನು ಎಂದೂ ಕೇಡನ್ನು ಪಡೆಯುವುದಿಲ್ಲ.

ಅರ್ಜುನನ ಪ್ರಶ್ನೆಗೆ ಕೃಷ್ಣನ ಉತ್ತರ ದೊಡ್ಡ ಭರವಸೆ. ಕೃಷ್ಣ ಹೇಳುತ್ತಾನೆ: "ಸಾಧನೆಯ ದಾರಿಯಲ್ಲಿ ಸಾಗಿದವರು ಇಹದಲ್ಲಿ ಅಥವಾ ಪರದಲ್ಲಿ ಏನನ್ನೂ ಕಳೆದುಕೊಳ್ಳುವುದಿಲ್ಲ. ಓ ನನ್ನ ಪ್ರೀತಿಯ ಮಿತ್ರನೇ, ಒಳ್ಳೆಯದನ್ನು ಮಾಡಿದವರು ಎಂದೂ ಕೆಟ್ಟದ್ದನ್ನು ಪಡೆಯುವುದಿಲ್ಲ. ಇದು ಪ್ರಕೃತಿಯ ನಿಯಮ" ಎಂದು. ಇಲ್ಲಿ ಕೃಷ್ಣ ಅರ್ಜುನನನ್ನು ಪಾರ್ಥಾ ಎಂದು ಸಂಬೋಧಿಸಿದ್ದಾನೆ. ಪಾರ್ಥ ಎಂದರೆ ಪಾರವನ್ನು(ದಡವನ್ನು) ತಿಳಿದವನು. ಸಾಧನೆಯ ಹಾದಿಯಲ್ಲಿ ಹೆಜ್ಜೆ ಇಟ್ಟವನು ಒಮ್ಮೆಗೇ ಭಗವಂತನನ್ನು ಕಾಣದಿದ್ದರೂ ಕೂಡಾ, ಆತ ಎಂದೂ ಮಧ್ಯದಲ್ಲಿ ಮುಳುಗುವುದಿಲ್ಲ. ಆತ ಸಾಧನೆಯ ಆಚೆ ದಡವನ್ನು ಸೇರಿಯೇ ಸೇರುತ್ತಾನೆ. ಒಳ್ಳೆಯದನ್ನು ಮಾಡಿದವರಿಗೆ ಒಳ್ಳೆಯ ಮಾರ್ಗವನ್ನು ತುಳಿದವರಿಗೆ ಎಂದೂ ಕೆಟ್ಟದ್ದಾಗುವುದಿಲ್ಲ. ನಮ್ಮಲ್ಲಿ ಕೆಲವರು

ಹೇಳುವುದಿದೆ: "ನಾನು ನನ್ನ ಜೀವನದಲ್ಲಿ ಎಂದೂ ಕೆಟ್ಟ ಕೆಲಸ ಮಾಡಿಲ್ಲ, ಯಾವತ್ತೂ ಒಬ್ಬರಿಗೆ ಕೇಡನ್ನು ಬಯಸಲಿಲ್ಲ, ಆದರೆ ಏಕೆ ದೇವರು ನನಗೆ ಹೀಗೆ ಮಾಡಿದ?" ಎಂದು. ನಾವು ಜೀವನದಲ್ಲಿ 'ಕೆಟ್ಟದ್ದನ್ನು ಮಾಡಿಲ್ಲ, ಕೆಟ್ಟದ್ದನ್ನು ಎಣಿಸಿಲ್ಲ' ಎನ್ನುವುದು ಕೇವಲ ಈ ಜನ್ಮಕ್ಕೆ ಸೀಮಿತ. ಆದರೆ ಜೀವದ ಗತಿ ಅನಾದಿ ಅನಂತ. ಅದು ಜನ್ಮದಿಂದ ಜನ್ಮಕ್ಕೆ ಹರಿದು ಬರುವ ಪ್ರವಾಹ. ನಾವು ಈ ಜನ್ಮದಲ್ಲಿ ಒಂದು ದುರಂತ ಅಥವಾ ಕಷ್ಟಕ್ಕೆ ಒಳಗಾದರೆ ಅದಕ್ಕೆ ಕಾರಣ ಭೂತವಾಗಿರುವಂತಹ ಇನ್ನೊಂದು ಕ್ರಿಯೆ ನಮ್ಮಿಂದ ನಡೆದಿರಲೇ ಬೇಕು. ಕೆಟ್ಟದ್ದನ್ನು ಮಾಡದವನು ಕೆಟ್ಟದ್ದನ್ನು ಪಡೆಯುವುದಿಲ್ಲ. ಒಳ್ಳೆಯದನ್ನು ಮಾಡಿದವನು ಒಳ್ಳೆಯದನ್ನು ಪಡೆಯದೇ ಇರುವುದಿಲ್ಲ. ಇದು ಸಾರ್ವಕಾಲಿಕ ಸತ್ಯ. ಇದಕ್ಕೆ ಅಪವಾದವೇ ಇಲ್ಲ. ಅದು ಹೇಗೆ ಎನ್ನುವುದನ್ನು ಕೃಷ್ಣ ಮುಂದೆ ವಿವರಿಸುತ್ತಾನೆ.

ಪ್ರಾಪ್ಯ ಪುಣ್ಯಕೃತಾಂ ಲೋಕಾನುಷಿತ್ವಾ ಶಾಶ್ವತೀಃ ಸಮಾಃ ।
ಶುಚೀನಾಂ ಶ್ರೀಮತಾಂ ಗೇಹೇ ಯೋಗಭ್ರಷ್ಟೋಽಭಿಜಾಯತೇ ॥೪೧॥

ಪ್ರಾಪ್ಯ ಪುಣ್ಯಕೃತಾಮ್ ಲೋಕಾನ್ ಉಷಿತ್ವಾ ಶಾಶ್ವತೀಃ ಸಮಾಃ ।
ಶುಚೀನಾಮ್ ಶ್ರೀಮತಾಮ್ ಗೇಹೇ ಯೋಗ ಭ್ರಷ್ಟಃ ಅಭಿಜಾಯತೇ-ಇಂತಹ ಯೋಗ ಭ್ರಷ್ಟನು ಪುಣ್ಯವಂತರ ಲೋಕಗಳನ್ನು ಪಡೆದು ಅಲ್ಲಿ ಬಹಳ ಕಾಲ ನೆಲೆಸಿ ಅನಂತರ ನಿರ್ಮಲರೂ ಸಿರಿವಂತರೂ ಆದವರ ಮನೆಯಲ್ಲಿ ಹುಟ್ಟುತ್ತಾನೆ.

ಯೋಗಾಭ್ಯಾಸ ಮಾಡಿ, ಭಗವಂತನ ಧ್ಯಾನಕ್ಕೆ ಪ್ರಯತ್ನಿಸಿ, ಕೆಲವು ಮೆಟ್ಟಲನ್ನೇರಿ ಯಾವುದೋ ಕಾರಣದಿಂದ, ಮನೋವಿಕ್ಷೇಪದಿಂದ ಅಥವಾ ಆಯುಸ್ಸು ಮುಗಿದುದರಿಂದ, ಅಲ್ಲೇ ಅದನ್ನು ನಿಲ್ಲಿಸಿದವನ ಸಾಧನೆ ಎಂದೂ ವ್ಯರ್ಥವಲ್ಲ. ಇದು ಏಕೆ ಎನ್ನುವುದನ್ನು ಕೃಷ್ಣ ಹಿಂದಿನ ಅಧ್ಯಾಯದಲ್ಲೇ (ಅ-೨; ಶ್ಲೋ-೪೦) ವಿವರಿಸಿದ್ದಾನೆ. ಅದಕ್ಕೆ ಒತ್ತು ಕೊಟ್ಟು ಇಲ್ಲಿ ಮತ್ತೆ ವಿವರಿಸುತ್ತಾನೆ. ಕೃಷ್ಣ ಹೇಳುತ್ತಾನೆ ಸಾಧನೆ ಮಧ್ಯದಲ್ಲಿ ನಿಂತು ಹೋದರೆ ಏನೂ ತೊಂದರೆ ಇಲ್ಲ. ಏಕೆಂದರೆ ಅಂತವನು ದೇಹತ್ಯಾಗ ಮಾಡಿದ ಮೇಲೆ ಪುಣ್ಯವನ್ನು ಗಳಿಸಿದವರು ಪಡೆಯುವಂತಹ ಲೋಕವನ್ನು ಪಡೆಯುತ್ತಾನೆ. ಬಹಳ ಕಾಲದ ತನಕ ಅಲ್ಲಿ ಸುಖವನ್ನು ಅನುಭವಿಸಿ, ಮತ್ತೆ ಭೂಮಿಯಲ್ಲಿ ಸ್ವಚ್ಛವಾದ ಶ್ರೀಮಂತ ವೇದಜ್ಞರ ಮನೆಯಲ್ಲಿ ಹುಟ್ಟುತ್ತಾನೆ. ಆತನಿಗೆ ಯಾವುದೇ ಐಹಿಕ ಭೋಗದ ಕೊರತೆ ಕಾಡದು. ಯೋಗಸಾಧನೆಗೆ ಬೇಕಾದ ಅತ್ಯುತ್ತಮ ವಾತಾವರಣ ಅವನಿಗೆ ದೊರೆಯುತ್ತದೆ.

ಅಥವಾ ಯೋಗಿನಾಮೇವ ಕುಲೇ ಭವತಿ ಧೀಮತಾಮ್ ।
ಏತದ್ಧಿ ದುರ್ಲಭತರಂ ಲೋಕೇ ಜನ್ಮ ಯದೀದೃಶಮ್ ॥೪೨॥

ಅಥವಾ ಯೋಗಿನಾಮ್ ಏವ ಕುಲೇ ಭವತಿ ಧೀಮತಾಮ್ ।
ಏತತ್ ಹಿ ದುರ್ಲಭ ತರಮ್ ಲೋಕೇ ಜನ್ಮ ಯತ್ ಈದೃಶಮ್-- ಅಥವಾ ಬಲ್ಲವರಾದ ಯೋಗಿಗಳ ಮನೆತನದಲ್ಲಿ ಹುಟ್ಟುತ್ತಾನೆ. ಲೋಕದಲ್ಲಿ ಈ ಬಗೆಯ ಹುಟ್ಟು ತುಂಬಾ ದುರ್ಲಭವಾದದ್ದು.

ಮುಂದುವರಿದು ಕೃಷ್ಣ ಹೇಳುತ್ತಾನೆ: ಯೋಗಸಾಧಕರಲ್ಲದಿದ್ದರೆ, ಯೋಗ ಸಿದ್ಧರ ಮನೆಯಲ್ಲಿ ಆತ ಜನಿಸುತ್ತಾನೆ. ಇದರಿಂದ ಗರ್ಭದಿಂದಲೇ ಆತನಿಗೆ ಯೋಗದ ದೀಕ್ಷೆಯಾಗುತ್ತದೆ. ಹಿಂದಿನ ಜನ್ಮದಲ್ಲಿ ಆತ ಸಾಧನೆಯ ಯಾವ ಮೆಟ್ಟಿಲನ್ನು ಹತ್ತಿದ್ದನೋ ಆ ಮೆಟ್ಟಿಲನ್ನು ಸುಲಭವಾಗಿ ಆತ ತಲುಪಿ ಅಲ್ಲಿಂದ ಮುಂದಿನ ಸಾಧನೆ ಮಾಡುವ ಅವಕಾಶ ಅವನಿಗೆ ಸಿಗುತ್ತದೆ. ಇದು ಅಧ್ಯಾತ್ಮ ಸಾಧನೆಯಲ್ಲಿನ ವಿಶೇಷ. ಒಂದು ಜನ್ಮದಲ್ಲಿ ಎರಡು ಮೆಟ್ಟಿಲು ಹತ್ತಿದರೆ ಮುಂದಿನ ಜನ್ಮದಲ್ಲಿ ನೇರವಾಗಿ ಮೂರನೇ ಮೆಟ್ಟಿಲಿಗೆ ಹೆಜ್ಜೆ. ಈ ಕಾರಣದಿಂದ ಯಾವ ಸಾಧನೆಯೂ ವ್ಯರ್ಥವಲ್ಲ- ಈ ಬಗ್ಗೆ ಎಂದೂ ನಿರಾಶೆಪಡಬೇಕಾಗಿಲ್ಲ. ಈ ರೀತಿ ಪಕ್ವವಾದ ಜೀವ ಯೋಗಸಿದ್ಧರ ಮನೆಯಲ್ಲಿ ಹುಟ್ಟುವುದರಿಂದ ಆತನಿಗೆ ಅಲ್ಲಿ ಅನುವಂಶೀಯ ಸಾತ್ವಿಕ ಸೆಳೆತ (genetic forces) ಮತ್ತು ಅದಕ್ಕೆ ಬೇಕಾದ ವಾತಾವರಣ(Environmental forces) ಸಿಗುತ್ತದೆ ಮತ್ತು ಆತ ಅಲ್ಲಿ ತನ್ನ ಸಾಧನೆಯನ್ನು ಮುಂದುವರಿಸುತ್ತಾನೆ. ಲೋಕದಲ್ಲಿ ಯೋಗಸಿದ್ಧರ ಮನೆಯಲ್ಲಿ ಹುಟ್ಟು ಬಹಳ ದುರ್ಲಭ. ಸಾಧನೆಯ ಹಾದಿಯಲ್ಲಿ ಎತ್ತರಕ್ಕೇರಿದವರಿಗೆ ಮಾತ್ರ ಈ ಭಾಗ್ಯ.

ತತ್ರ ತಂ ಬುದ್ಧಿಸಂಯೋಗಂ ಲಭತೇ ಪೌರ್ವದೈಹಿಕಮ್ ।
ಯತತೇ ಚ ತತೋ ಭೂಯಃ ಸಂಸಿದ್ಧೌ ಕುರುನಂದನ ॥೪೩॥

ತತ್ರ ತಮ್ ಬುದ್ಧಿಸಂಯೋಗಮ್ ಲಭತೇ ಪೌರ್ವ ದೈಹಿಕಮ್ ।
ಯತತೇ ಚ ತತಃ ಭೂಯಃ ಸಂಸಿದ್ಧೌ ಕುರುನಂದನ-- ಈ ಜನ್ಮದಲ್ಲೂ ಹಿಂದಿನ ಜನ್ಮದ ವಿವೇಕದ ನಂಟನ್ನು ಮರಳಿ ಪಡೆಯುತ್ತಾನೆ. ಕುರುನಂದನಾ, ಮತ್ತೆ ಮರಳಿ ಸಿದ್ಧಿಗಾಗಿ ಪ್ರಯತ್ನಿಸುತ್ತಾನೆ.

ಹಿಂದಿನ ಜನ್ಮದಲ್ಲಿ ಅವನು ಏನು ಸಾಧನೆ ಮಾಡಿದ್ದ ಅವೆಲ್ಲವೂ ಸುಪ್ತಪ್ರಜ್ಞೆಯಲ್ಲಿ ಹುದುಗಿದ್ದು ಅದಕ್ಕೆ ಅನುಗುಣವಾದ ವಾತಾವರಣ ಸಿಕ್ಕ ತಕ್ಷಣ ಅದು ಜಾಗೃತವಾಗುತ್ತದೆ. ಈ ಜನ್ಮದ ಬೆಳವಣಿಗೆ ಹಿಂದಿನ ಜನ್ಮದ ಬೆಳವಣಿಗೆಯ ಉತ್ತರಾರ್ಧವಾಗುತ್ತದೆ. ಒಂದು ವೇಳೆ ಹಿಂದಿನ ಜನ್ಮದಲ್ಲಿ ಹೆಚ್ಚು ಬೆಳವಣಿಗೆ ಆಗದೇ ಇದ್ದಿದ್ದರೆ ಇಲ್ಲಿ ಅದನ್ನು ಪ್ರಾರಂಭಿಸಬೇಕೇ ಹೊರತು ಅದಕ್ಕಾಗಿ ಗಾಬರಿಪಡುವ ಅವಶ್ಯಕತೆ ಇಲ್ಲ. ಪೂರ್ವ ಜನ್ಮದ ಸಂಸ್ಕಾರ ಸದಾ ನಮ್ಮೊಂದಿಗಿರುತ್ತದೆ ಹಾಗೂ ಆ ಸಂಸ್ಕಾರದೊಂದಿಗೆ ನಾವು ಸಾಧನೆಯ ಹಾದಿಯಲ್ಲಿ ಮುಂದುವರಿಯಬೇಕು. ಧ್ಯಾನಯೋಗವೆಂಬುವುದು ಒಂದು ಜನ್ಮದ ಸಾಧನೆಯಲ್ಲ.

ಪೂರ್ವಾಭ್ಯಾಸೇನ ತೇನೈವ ಹ್ರಿಯತೇ ಹ್ಯವಶೋऽಪಿ ಸಃ ।
ಜಿಜ್ಞಾಸುರಪಿ ಯೋಗಸ್ಯ ಶಬ್ದಬ್ರಹ್ಮಾತಿವರ್ತತೇ ॥೪೪॥

ಪೂರ್ವ ಅಭ್ಯಾಸೇನ ತೇನ ಏವ ಹ್ರಿಯತೇ ಹಿ ಅವಶಃ ಅಪಿ ಸಃ ।

ಜಿಜ್ಞಾಸುಃ ಅಪಿ ಯೋಗಸ್ಯ ಶಬ್ದಬ್ರಹ್ಮ ಅತಿವರ್ತತೇ -- ಹಿಂದಿನ ಅಭ್ಯಾಸ ಬಲದಿಂದ ಅವನಿಗರಿವಿಲ್ಲದೆಯೇ, ಅವನ ಬಗೆ ಅತ್ತ ಹರಿಯುತ್ತದೆ. ಧ್ಯಾನಯೋಗವನ್ನು ತಿಳಿಯಬಯಸಿದವನು ಕೂಡಾ ಶಬ್ದಬ್ರಹ್ಮದಾಚೆಗಿರುವ ಪರಬ್ರಹ್ಮನನ್ನು ಸೇರುತ್ತಾನೆ.

ಒಂದು ವೇಳೆ ವೇದಜ್ಞರ ಮನೆಯಲ್ಲಿ ಹುಟ್ಟದೇ ಇದ್ದರೂ ಕೂಡಾ ಹಿಂದಿನ ಜನ್ಮದ ಸಾಧನೆಯ ಫಲದಿಂದ ನಮಗರಿವಿಲ್ಲದಂತೆ ನಮ್ಮ ಮನಸ್ಸು ಸಾಧನೆಯತ್ತ ಹರಿಯುತ್ತದೆ. ಪ್ರಹ್ಲಾದದನ ಮತ್ತು  ಪಿಂಗಳೆಯ ಕಥೆ ಇದಕ್ಕೆ ಉತ್ತಮ ದೃಷ್ಟಾಂತ. ಅಂತರಂಗದಲ್ಲಿ ಸದಾ ಅಧ್ಯಾತ್ಮದ ಬಗ್ಗೆ ತುಡಿತ, ಅತ್ಯಂತ ಉತ್ಕಟವಾದ ಕಳಕಳಿ ಇದ್ದರೆ ಅವರು ಶಾಸ್ತ್ರ ಓದಿದವರನ್ನೂ ಮೀರಿ ಎತ್ತರಕ್ಕೇರುತ್ತಾರೆ.

ಪ್ರಯತ್ನಾದ್ ಯತಮಾನಸ್ತು ಯೋಗೀ ಸಂಶುದ್ಧಕಿಲ್ಬಿಷಃ ।
ಅನೇಕಜನ್ಮಸಂಸಿದ್ಧಸ್ತತೋ ಯಾತಿ ಪರಾಂ ಗತಿಮ್ ॥೪೫॥

ಪ್ರಯತ್ನಾತ್ ಯತಮಾನಃ ಟು  ಯೋಗೀ ಸಂಶುದ್ಧ ಕಿಲ್ಬಿಷಃ ।
ಅನೇಕ ಜನ್ಮಸಂಸಿದ್ಧಃ ತತಃ  ಯಾತಿ ಪರಾಮ್  ಗತಿಮ್-- ಧ್ಯಾನದಲ್ಲಿ ತೊಡಗುವ ಸಾಧಕ ಪ್ರಯತ್ನದ ಫಲವಾಗಿ ಬಗೆಯ ಕಿಲುಬು ಕಳೆದುಕೊಂಡು ಅನೇಕ ಜನ್ಮಗಳ ಸಾಧನೆಯಿಂದ ಸಿದ್ಧಿ ಪಡೆದು ಹಿರಿಯ ನೆಲೆಯಾದ ಭಗವಂತನನ್ನು ಸೇರುತ್ತಾನೆ.

ಹಿಂದೆ ಹೇಳಿದಂತೆ ನಮ್ಮ ಸಾಧನೆ ಅನೇಕ ಜನ್ಮಗಳದ್ದು. ಮೊದಲು ನಮ್ಮಲ್ಲಿ ಇಚ್ಛೆ ಹುಟ್ಟಿತು, ಅದರಿಂದ ಆ ಇಚ್ಛೆ ಪೂರ್ಣವಾಗುವ ವಾತವರಣವನ್ನು ಮುಂದಿನ ಜನ್ಮದಲ್ಲಿ ಭಗವಂತ ಕೊಟ್ಟ, ಅಲ್ಲಿ ಪ್ರಯತ್ನ ಮಾಡಿ ಒಳಗಿನ ಕೊಳೆ ತೊಳೆಯಿತು, ಸಾಧನೆಯಿಂದ ಸ್ವಚ್ಛವಾದ ಜ್ಞಾನ ಬಂತು. ಈ ಜ್ಞಾನ ಮತ್ತು ಸಾಧನೆಯಿಂದ ಅನೇಕ ಜನ್ಮಗಳ ನಂತರ ಶಬ್ದಬ್ರಹ್ಮನನ್ನು ಮೀರಿ ಭಗವಂತನನ್ನು ಕಾಣಲು ಸಾಧ್ಯ. ಹೀಗೆ ಅಂತರಂಗದಲ್ಲಿ ಉತ್ಕಟವಾದ ಕಳಕಳಿಯುಳ್ಳ ಜಿಜ್ಞಾಸು ಶಾಸ್ತ್ರ ಪಂಡಿತರನ್ನು ಮೀರಿ ಮೋಕ್ಷವನ್ನು ತಲುಪಬಲ್ಲ.
ಸಾಧನೆಯಲ್ಲಿ ಬಹಳ ಮುಖ್ಯವಾದದ್ದು ಅಂತರಂಗ ಪ್ರಪಂಚದ ಸಾಧನೆ. ಹೊರಗಡೆ ಸ್ನಾನ, ಪೂಜೆ, ಹೋಮ, ಹವನ, ಏನೇ ಮಾಡಿದರೂ ಕೂಡಾ, ಅದಕ್ಕಿಂತ ಮಿಗಿಲಾದದ್ದು ಅಂತರಂಗ ಪ್ರಪಂಚ. ಇದನ್ನು ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ ಕೃಷ್ಣ.

ತಪಸ್ವಿಭ್ಯೋಽಧಿಕೋ ಯೋಗೀ ಜ್ಞಾನಿಭ್ಯೋಽಪಿ ಮತೋಽಧಿಕಃ ।
ಕರ್ಮಿಭ್ಯಶ್ಚಾಧಿಕೋ ಯೋಗೀ ತಸ್ಮಾದ್ ಯೋಗೀ ಭವಾರ್ಜುನ॥೪೬॥

ತಪಸ್ವಿಭ್ಯಃ ಅಧಿಕಃ ಯೋಗೀ ಜ್ಞಾನಿಭ್ಯಃ ಅಪಿ ಮತಃ ಅಧಿಕಃ ।

ಕರ್ಮಿಭ್ಯಃ ಚ ಅಧಿಕಃ ಯೋಗೀ ತಸ್ಮಾತ್ ಯೋಗೀ ಭವ ಅರ್ಜುನ--ಧ್ಯಾನ ಯೋಗದ ಸಾಧಕ ಉಪವಾಸ ಮೊದಲಾದ ವ್ರತಸಾಧಕರಿಗಿಂತ ಮಿಗಿಲು; ಬರಿಯ ಧ್ಯಾನಯೋಗದ ಬಗೆಯನ್ನು ಬಲ್ಲವರಿಗಿಂತಲೂ ಮಿಗಿಲು ಎನ್ನುವುದು ತೀರ್ಮಾನ. ಕರ್ಮ ಯೋಗಿಗಳಿಗಿಂತಲೂ ಮಿಗಿಲು. ಆದ್ದರಿಂದ ಓ ಅರ್ಜುನಾ, ನೀನು ಧ್ಯಾನಯೋಗಿಯಾಗು.

ಯಾರು ಅಂತರಂಗದಲ್ಲಿ ಏಕಾಗ್ರವಾಗಿ ಭಗವಂತನನ್ನು ಧ್ಯಾನಿಸಬಲ್ಲನೋ, ಅವನು ತಪಸ್ಸು ಮಾಡುವವನಿಗಿಂತ ದೊಡ್ಡವ ಎನ್ನುತ್ತಾನೆ ಕೃಷ್ಣ. ಇಲ್ಲಿ ತಪಸ್ಸು ಎಂದರೆ ನಾವು ಮಾಡುವ ವ್ರತಾಚರಣೆ. ದೇಹ ದಂಡನೆ, ಏಕಾದಶಿ ಉಪವಾಸ, ಬ್ರಹ್ಮಚರ್ಯಪಾಲನೆ ಇತ್ಯಾದಿ. ಬಾಹ್ಯವಾದ ನೂರಾರು ವ್ರತಾಚರಣೆ, ಹೋಮ-ಹವನ ಮಾಡುವವರಿಗಿಂತಲೂ ಅಂತರಂಗದಲ್ಲಿ ಧ್ಯಾನ ಮಾಡತಕ್ಕವನು ಭಗವಂತನಿಗೆ ಹೆಚ್ಚು ಪ್ರಿಯ. ಅವನು ಜ್ಞಾನಿಗಳಿಗಿಂತಲೂ ದೊಡ್ಡವನು ಎನ್ನುತ್ತಾನೆ ಕೃಷ್ಣ. ಅಂದರೆ ಧ್ಯಾನದ ಬಗ್ಗೆ, ಶಾಸ್ತ್ರದ ಬಗ್ಗೆ ಕೇವಲ ತಿಳಿದಿರುವವರಿಗಿಂತ ಧ್ಯಾನ ಮಾಡುವವನು ದೊಡ್ಡವನು. ಇಂದು ಅಧ್ಯಾತ್ಮದ ಬಗ್ಗೆ ಮಾತನಾಡುವವರು ಸಿಗುತ್ತಾರೆ, ಹೊರತು ನಿಜವಾದ ಧ್ಯಾನ ಯೋಗಿಗಳು ಸಿಗುವುದು ಅತೀ ವಿರಳ**("There are nowadays professors of philosophy, but not philosophers"- Henry David Thoreau, Walden).**
ನಮ್ಮಲ್ಲಿ ಕೆಲವರು ಕರ್ಮಟರು. ಯಜ್ಞ-ಯಾಗ ಮಾಡುವುದು, ಅಗ್ನಿ ಮುಖೇನ ಭಗವಂತನ ಆರಾಧನೆ ಮಾಡುವವರು. ಅಂತರಂಗದಲ್ಲಿ ಭಗವಂತನನ್ನು ಕಾಣುವುದಕ್ಕೋಸ್ಕರ ಈ ಕರ್ಮ. ಇದೇ ರೀತಿ ಪ್ರತಿಮಾಪೂಜೆ. ನಮ್ಮ ಪೂಜೆ ಕೇವಲ ದೇವರ ಪ್ರತಿಮೆಗೆ ಮೀಸಲಾಗದೇ ಅದು ಅಂತರಂಗದಲ್ಲಿ ಭಗವಂತನನ್ನು ಕಾಣಲು ಸಹಾಯ ಮಾಡುವ ಸಂಕೇತ ಎನ್ನುವ ಜ್ಞಾನ ನಮಗಿರಬೇಕು. ಮಾನಸ ಪೂಜೆ ಇಲ್ಲದೇ ಬಾಹ್ಯ ಪೂಜೆ ಪೂಜೆಯೇ ಅಲ್ಲ. ಆದ್ದರಿಂದ ಬರೇ ಕರ್ಮಟನಾಗಿ ಬಾಹ್ಯಪೂಜೆ ಮಾಡುವವನಿಗಿಂತ ಮಾನಸ ಪೂಜೆ ಮಾಡುವ ಧ್ಯಾನಯೋಗಿ ದೊಡ್ಡವ. " ಆದ್ದರಿಂದ ನೀನು ಜೀವನದಲ್ಲಿ ಧ್ಯಾನಯೋಗಿಯಾಗು, ಅಂತರಂಗದ ಧ್ಯಾನದಲ್ಲಿ ತೊಡಗು. ಆ ಧ್ಯಾನದಲ್ಲಿ ತೊಡಗಿದ ಮೇಲೆ ನಿನ್ನ ಬಾಹ್ಯಕರ್ಮಗಳು ನಿನಗೆ ಲೇಪವಾಗುವುದಿಲ್ಲ. ಆಗ ಯುದ್ಧವೂ ಕೂಡಾ ಭಗವದ್ ಪೂಜೆಯಾಗುತ್ತದೆ" ಎನ್ನುವುದು ಅರ್ಜುನನಿಗೆ ಕೃಷ್ಣನ ಸಂದೇಶ.

ಯೋಗಿನಾಮಪಿ ಸರ್ವೇಷಾಂ ಮದ್ಗತೇನಾಂತರಾತ್ಮನಾ ।
ಶ್ರದ್ಧಾವಾನ್ ಭಜತೇ ಯೋ ಮಾಂ ಸ ಮೇ ಯುಕ್ತತಮೋ ಮತಃ ॥೪೭॥

ಯೋಗಿನಾಮ್ ಅಪಿ ಸರ್ವೇಷಾಮ್ ಮತ್ ಗತೇನ ಅಂತಃ ಆತ್ಮನಾ ।
ಶ್ರದ್ಧಾವಾನ್ ಭಜತೇ ಯಃ ಮಾಮ್ ಸಃ ಮೇ ಯುಕ್ತ ತಮಃ ಮತಃ –ನನ್ನಲ್ಲಿ ಒಳಬಗೆಯನ್ನಿರಿಸಿ ಶ್ರದ್ಧೆಯಿಂದ ನನ್ನನ್ನು ಸೇವಿಸುವವನು ಇತರ ಎಲ್ಲಾ ಧ್ಯಾನಯೋಗಿಗಳಿಗಿಂತಲೂ ಹಿರಿಯ ಯೋಗಿ ಎಂದು ನನ್ನ ತೀರ್ಮಾನ.

ಧ್ಯಾನವನ್ನು ಮಾಡುವಾಗ ನಾವು ಮನಸ್ಸನ್ನು ಯಾವುದರ ಮೇಲೆ ಕೂಡಾ ಏಕಾಗ್ರ ಮಾಡಿ ಧ್ಯಾನ ಮಾಡಬಹುದು. ಕೆಲವರು ಅನೇಕ ಕ್ಷುದ್ರ ದೇವತೆಗಳು, ಭೂತ-ಪ್ರೇತಗಳನ್ನು ಉಪಾಸನೆ ಮಾಡುವವರಿದ್ದಾರೆ.

ಆದರೆ ಕೃಷ್ಣ ಹೇಳುತ್ತಾನೆ: "ಯಾರು ಭಗವಂತನಲ್ಲೇ ಮನಸ್ಸನ್ನಿಟ್ಟು ಧ್ಯಾನ ಮಾಡುತ್ತಾರೋ ಅವರು ಎಲ್ಲರಿಗಿಂತ ಹಿರಿಯ ಯೋಗಿ" ಎಂದು. ಭಗವಂತನನ್ನು ಬಿಟ್ಟು ಇನ್ನೇನನ್ನೋ ಧ್ಯಾನ ಮಾಡಿದರೆ ಏನೂ ಉಪಯೋಗವಿಲ್ಲ. ನಮ್ಮ ಜ್ಯೋತಿಷಿಗಳು ಸಾಮಾನ್ಯವಾಗಿ 'ಇಂತಹ ಗ್ರಹಚಾರಕ್ಕೆ ಇಂತಹ ದೇವತೆಯನ್ನು ಉಪಾಸನೆ ಮಾಡು' ಎಂದು ಹೇಳುತ್ತಾರೆ. ಅದರರ್ಥ  ಭಗವಂತನನ್ನು ಆ ಪ್ರತೀಕದಲ್ಲಿ ಕಾಣು ಎಂದರ್ಥ. ಯಾವುದೇ ದೇವತೆಯನ್ನು ಉಪಾಸನೆ ಮಾಡುವಾಗ ಆ ಪ್ರತೀಕದಲ್ಲಿ ಭಗವಂತನ ಉಪಾಸನೆ ಮಾಡದಿದ್ದರೆ ಅದು ನಿಜವಾದ ಯೋಗವಾಗುವುದಿಲ್ಲ. ಧ್ಯಾನದಲ್ಲಿ ಕೇವಲ ಭಗವಂತನನ್ನು ಕಾಣಬೇಕು ಎನ್ನುವ ಬಯಕೆ ಮತ್ತು  ಎಲ್ಲಾ ಪ್ರತೀಕದಲ್ಲೂ ಅವನನ್ನೇ ಕಾಣುವುದು ಶ್ರೇಷ್ಠವಾದ ಯೋಗ. ಈ ರೀತಿ ಬದುಕಿದಾಗ ನಮ್ಮ ಬದುಕೇ ಒಂದು ಯೋಗವಾಗುತ್ತದೆ.

ಇತಿ ಷಷ್ಠೋऽಧ್ಯಾಯಃ

ಆರನೆಯ ಅಧ್ಯಾಯ ಮುಗಿಯಿತು

ಇಲ್ಲಿಗೆ ಭಗವದ್ಗೀತೆಯ ಮೊದಲ ಷಟ್ಕ(ಮೊದಲ ಆರು ಅಧ್ಯಾಯ) ಮುಗಿಯಿತು. ಈ ಷಟ್ಕದಲ್ಲಿ ಭಗವಂತನ ಉಪಾಸನೆಯ ಜ್ಞಾನ ಮತ್ತು ಸಾಂಖ್ಯವನ್ನು ಕೃಷ್ಣ ವಿವರಿಸಿದ. ಜ್ಞಾನಪೂರ್ವಕವಾಗಿ ಭಗವದುಪಾಸನೆಯನ್ನು ಮಾಡುವಂತಹ ವಿಧಾನವನ್ನು ಗೀತೆಯ ಮೊದಲ ಷಟ್ಕ ವಿವರಿಸುತ್ತದೆ. ಮುಂದೆ ಭಗವಂತನನ್ನು ಉಪಾಸನೆ ಮಾಡುವ ವಿಷಯಾಂಶ(aspect) ಮತ್ತು ಭಗವಂತನ ಮಹಿಮೆ-ಅದರ ವಿವರಗಳು ಬರುತ್ತವೆ.



# ಅಧ್ಯಾಯ ಏಳು

ಹಿಂದಿನ ಆರು ಅಧ್ಯಾಯ(ಮೊದಲ ಷಟ್ಕ)ದಲ್ಲಿ ಕೃಷ್ಣ ಸಾಧಕನಾದವನು ಯಾವ ರೀತಿ ಸಾಧನೆಗೆ ತೊಡಗಬೇಕು, ಕರ್ಮ ಹೇಗಿರಬೇಕು, ಧ್ಯಾನ ಹೇಗಿರಬೇಕು, ಇತ್ಯಾದಿ ಭಗವಂತನನ್ನು ತಿಳಿಯುವ ಸಾಧನದ ಬಗ್ಗೆ ಹೇಳಿದ. ಎರಡನೇ ಷಟ್ಕ(ಅ-೭ರಿಂದ ೧೨) ಸಾಧನೆಯ ಮೂಲಕ ನಾವು ತಿಳಿದುಕೊಳ್ಳಬೇಕಾದ ಭಗವಂತನ ಸ್ವರೂಪವನ್ನು, ವಿಭೂತಿಯನ್ನು, ವೈಭವವನ್ನು, ಆತನ ಮಹಿಮೆಯನ್ನು ಹೇಳುವ ಸಾಧ್ಯಾಽಧ್ಯಾಯ.

ಈ ಅಧ್ಯಾಯದಲ್ಲಿ ನಾವು ನಮ್ಮ ಅರಿವಿನ ಪೂರ್ಣ ಸಾಮರ್ಥ್ಯದಷ್ಟು ಭಗವಂತನನ್ನು ಹೇಗೆ ತಿಳಿಯಬಹುದು ಎನ್ನುವುದನ್ನು ಕೃಷ್ಣ ವಿವರಿಸುತ್ತಾನೆ. ಯಾವುದನ್ನು ತಿಳಿದರೆ ಎಲ್ಲವನ್ನೂ ತಿಳಿದಂತಾಗುತ್ತದೋ ಅಂತಹ ವಿಜ್ಞಾನವನ್ನು ಇಲ್ಲಿ ಕಾಣಬಹುದು. ಅಷ್ಟರೂಪದ ಅಕ್ಷರಪ್ರಕೃತಿಯ ಸೃಷ್ಟಿ; ನಾದಸೃಷ್ಟಿ; ಸೃಷ್ಟಿ ಕ್ರಿಯೆಯಲ್ಲಿ ಚೇತನಪ್ರಕೃತಿ, ಶ್ರೀತತ್ವ ಮತ್ತು ಅದರ ಮಹತ್ವವನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ನೀರು, ಸೂರ್ಯ, ಚಂದ್ರ, ಆಕಾಶ, ಭೂಮಿ, ಅಗ್ನಿ, ಆತ್ಮಬಲ, ವಾಯು, ತಪಸ್ಸು ಎಲ್ಲವುದರಲ್ಲೂ ಹೇಗೆ ಭಗವಂತನ ವಿಭೂತಿ ಅಡಗಿದೆ ಎನ್ನುವುದರ ಸಂಕ್ಷಿಪ್ತ ಚಿತ್ರಣವನ್ನು ಕ್ರೋಡೀಕರಿಸಿ ಇಲ್ಲಿ ವಿವರಿಸಲಾಗಿದೆ.[ಭಗವಂತನ ವಿಭೂತಿಯನ್ನು ವಿಶೇಷವಾಗಿ ಅಧ್ಯಾಯ ಹತ್ತರಲ್ಲಿ ಕಾಣಬಹುದು]. ತ್ರಿಗುಣಾತ್ಮಕವಾದ ಪ್ರಪಂಚದಲ್ಲಿನ ನಮ್ಮ ಬದುಕು; ಮಾಯಾ ಪ್ರಪಂಚ ಮತ್ತು ಅದರಿಂದ ಹೊರ ಬರುವ ದಾರಿಯನ್ನು ಕೃಷ್ಣ ಇಲ್ಲಿ ವಿವರಿಸುತ್ತಾನೆ. ದುಷ್ಕೃತಿಗಳ ಮತ್ತು ಪುಣ್ಯವಂತ ಸಜ್ಜನರ ವಿಧ; ಅವರಲ್ಲಿ ಮತ್ತು ಅವರ ಭಕ್ತಿಯಲ್ಲಿ ಶ್ರೇಷ್ಠ ಯಾವುದು; ಜ್ಞಾನ ಮತ್ತು ಭಕ್ತಿಯಿಂದ ಯಾರು ಮುಕ್ತಿಯನ್ನು ಪಡೆಯುತ್ತಾರೆ-ಇತ್ಯಾದಿ ಅಧ್ಯಾತ್ಮ ವಿಜ್ಞಾನವನ್ನು ಈ ಅಧ್ಯಾಯ ವಿವರಿಸುತ್ತದೆ. ಈ ಅಧ್ಯಾಯ ಭಗವಂತನ ಅಮೃತ ನುಡಿಯಿಂದ ಪ್ರಾರಂಭವಾಗುತ್ತದೆ.

ಭಗವಾನುವಾಚ ।

ಮಯ್ಯಾಸಕ್ತಮನಾಃ ಪಾರ್ಥ ಯೋಗಂ ಯುಂಜನ್ ಮದಾಶ್ರಯಃ ।
ಅಸಂಶಯಂ ಸಮಗ್ರಂ ಮಾಂ ಯಥಾ ಜ್ಞಾಸ್ಯಸಿ ತಚ್ಛೃಣು ॥೧॥

ಭಗವಾನ್ ಉವಾಚ-ಭಗವಂತ ಹೇಳಿದನು:

ಮಯಿ ಆಸಕ್ತ ಮನಾಃ ಪಾರ್ಥ ಯೋಗಮ್ ಯುಂಜನ್ ಮತ್ ಆಶ್ರಯಃ ।

ಅಸಂಶಯಮ್ ಸಮಗ್ರಮ್ ಮಾಮ್ ಯಥಾ ಜ್ಞಾಸ್ಯಸಿ ತತ್ ಶೃಣು –ಪಾರ್ಥಾ, ನನ್ನನ್ನೇ ಬಗೆ ತುಂಬಿ ಪ್ರೀತಿಸುತ್ತಾ, ನನ್ನನ್ನೇ ಮೊರೆಹೊಕ್ಕು, ಯೋಗ ಸಾಧನೆಯಲ್ಲಿ ತೊಡಗುತ್ತಾ, ಖಚಿತವಾಗಿ ಅರಿವಿನ ತೆಕ್ಕೆ ತುಂಬಾ ನನ್ನನ್ನು ಹೇಗೆ ಅರಿಯಬಲ್ಲೆ ಅದನ್ನು ಕೇಳು.

ಮದ್ದಾನೆ ಅಥವಾ ಗೂಳಿಯಂತಹ ನಮ್ಮ ಮನಸ್ಸನ್ನು ಮಣಿಸಿ, ಸಾಧನೆಯ ಹಾದಿಯಲ್ಲಿ ಅದನ್ನು ಪಕ್ವಗೊಳಿಸಿದ ಮೇಲೆ, ಭಗವಂತನಲ್ಲಿ ಮತ್ತೆಂದೂ ಕದಲದ, ಸುದೃಡ ಮತ್ತು ಗಾಢವಾದ ಭಕ್ತಿಯಿಂದ, ಅಹಂಕಾರ ತೊರೆದು,

ಸಂಪೂರ್ಣ ಶರಣಾಗತಿಯಿಂದ (ಎಲ್ಲಾ ಕಾಲದಲ್ಲೂ ನಾವು ಭಗವಂತನ ಅಧೀನ ಎನ್ನುವ ಎಚ್ಚರದಿಂದ), ಭಗವಂತನಲ್ಲಿ ಸಂಪೂರ್ಣವಾಗಿ ತನ್ನನ್ನು ತಾನು ಅರ್ಪಿಸಿಕೊಂಡು, ಧ್ಯಾನಯೋಗದಲ್ಲಿ ತೊಡಗಿದ ಮೇಲೆ, 'ಅರಿವಿನ ಪೂರ್ಣ ಸಾಮರ್ಥ್ಯದಷ್ಟು ಭಗವಂತನನ್ನು ಹೇಗೆ ತಿಳಿಯಬಹುದು' ಅದನ್ನು ಕೇಳು ಎನ್ನುತ್ತಾನೆ ಕೃಷ್ಣ.

ಜ್ಞಾನಂ ತೇಽಹಂ ಸವಿಜ್ಞಾನಮಿದಂ ವಕ್ಷ್ಯಾಮ್ಯಶೇಷತಃ ।
ಯಜ್ ಜ್ಞಾತ್ವಾ ನೇಹ ಭೂಯೋಽನ್ಯಜ್ ಜ್ಞಾತವ್ಯಮವಶಿಷ್ಯತೇ ॥೨॥

ಜ್ಞಾನಮ್ ತೇ ಅಹಮ್ ಸ ವಿಜ್ಞಾನಮ್ ಇದಮ್ ವಕ್ಷ್ಯಾಮಿ ಅಶೇಷತಃ ।
ಯತ್ ಜ್ಞಾತ್ವಾ ನ ಇಹ ಭೂಯಃ ಅನ್ಯತ್ ಜ್ಞಾತವ್ಯಮ್ ಅವಶಿಷ್ಯತೇ –ತಿಳಿಯಬೇಕಾದ ನನ್ನ ಹಿರಿಮೆಯನ್ನು ಅದರ ಬಿತ್ತರದ ಜತೆಗೆ ನಿನಗೆ ನಾನು ಪೂರ್ತಿಯಾಗಿ ಹೇಳುತ್ತೇನೆ. ಇದನ್ನು ತಿಳಿದರೆ ಮತ್ತೆ ಈ ವಿಷಯದಲ್ಲಿ ಬೇರೆ ತಿಳಿಯುವಂತದ್ದೇನೂ ಉಳಿದಿರುವುದಿಲ್ಲ.

ಯಾವುದನ್ನು ತಿಳಿದರೆ ಎಲ್ಲವನ್ನೂ ತಿಳಿದಂತಾಗುತ್ತದೋ ಅದನ್ನು ನಿನಗೆ ಹೇಳುತ್ತೇನೆ ಎನ್ನುತ್ತಾನೆ ಕೃಷ್ಣ. ಉಪನಿಷತ್ತಿನಲ್ಲಿ ಒಂದು ಮಾತಿದೆ "ಯಸ್ಮಿನ್ ವಿಜ್ಞಾತೇ ಸರ್ವಮಿದಂ ವಿಜ್ಞಾತಂ ಭವತಿ" ||ಶಾಂಡಿಲ್ಯ-೨.೨; ಮುಂಡಕ ೧.೧.೩|| ಅಂದರೆ ಯಾವುದನ್ನು ತಿಳಿದರೆ ಎಲ್ಲವೂ ತಿಳಿಯುತ್ತದೋ ಅದನ್ನು ಮೊದಲು ತಿಳಿಯಬೇಕು. ನಾವು ಭಗವಂತನನ್ನು ತಿಳಿದರೆ ಈ ಪ್ರಪಂಚವನ್ನು ತಿಳಿದಂತೆ. ಅದನ್ನು ಬಿಟ್ಟು ಪ್ರಪಂಚವನ್ನು ತಿಳಿದು ಭಗವಂತನನ್ನು ತಿಳಿಯಬೇಕು ಅಂದುಕೊಂಡರೆ ಅದು ಅಸಾಧ್ಯ. ಇಲ್ಲಿ ಕೃಷ್ಣ ಹೇಳುತ್ತಾನೆ: "ಯಾವ ಸಂಗತಿಯನ್ನು ತಿಳಿದರೆ ಮತ್ತೆ ಬೇರೆ ತಿಳಿದುಕೊಳ್ಳಬೇಕಾದ ಸಂಗತಿ ಉಳಿಯುವುದಿಲ್ಲವೋ ಅಂತಹ ವಿಜ್ಞಾನವನ್ನು ನಿನಗೆ ಕೊಡುತ್ತೇನೆ" ಎಂದು. ಜ್ಞಾನ ವಿಜ್ಞಾನವಾದಾಗಲೇ ಅದು ಸಮಗ್ರವಾಗುವುದು. ವಿಜ್ಞಾನ ಅಂದರೆ ವಿ+ಜ್ಞಾನ. ಇಲ್ಲಿ 'ವಿ' ಉಪಸರ್ಗ, 'ವಿ'- ವಿಲಕ್ಷಣವಾದ, ವಿಶಿಷ್ಟವಾದ, ವಿಶೇಷವಾದ, ಇತ್ಯಾದಿ ಅರ್ಥವನ್ನು ಕೊಡುತ್ತದೆ. ಒಂದು ವಿಷಯವನ್ನು ತಳಸ್ಪರ್ಶಿಯಾಗಿ ತಿಳಿಯುವುದು ವಿಜ್ಞಾನ. ಇಲ್ಲಿ ಕೃಷ್ಣ ಹೇಳುತ್ತಿರುವುದು ವಿಜ್ಞಾನದ ಬಗ್ಗೆ. 'ದೇವರು ಇದ್ದಾನೆ, ಅವನು ಸರ್ವಸಮರ್ಥ, ಸರ್ವಾಂತರ್ಯಾಮಿ' ಎನ್ನುವುದು ಜ್ಞಾನ; ಆತ ಎಲ್ಲೆಲ್ಲಿ ಹೇಗಿದ್ದಾನೆ, ಯಾವ ವಸ್ತುವಿನಲ್ಲಿ ಯಾವ ವಿಭೂತಿಯಾಗಿದ್ದಾನೆ ಎಂದು ವಿವರವಾಗಿ ತಿಳಿಯುವುದು ವಿಜ್ಞಾನ.

ಮನುಷ್ಯಾಣಾಂ ಸಹಸ್ರೇಷು ಕಶ್ಚಿದ್ ಯತತಿ ಸಿದ್ಧಯೇ ।
ಯತತಾಮಪಿ ಸಿದ್ಧಾನಾಂ ಕಶ್ಚಿನ್ಮಾಂ ವೇತ್ತಿ ತತ್ತ್ವತಃ ॥೩॥

ಮನುಷ್ಯಾಣಾಮ್ ಸಹಸ್ರೇಷು ಕಶ್ಚಿತ್ ಯತತಿ ಸಿದ್ಧಯೇ ।

ಯತತಾಮ್ ಅಪಿ ಸಿದ್ಧಾನಾಮ್ ಕಶ್ಚಿತ್ ಮಾಮ್ ವೇತ್ತಿ ತತ್ತ್ವತಃ –ಸಾವಿರಾರು ಮಂದಿಯಲ್ಲಿ ಯಾರೋ ಒಬ್ಬ ಸಿದ್ಧಿಗಾಗಿ ಪ್ರಯತ್ನಿಸುತ್ತಾನೆ. ಪ್ರಯತ್ನಿಸಿದವರಲ್ಲಿ, ಪ್ರಯತ್ನಿಸಿ ಗುರಿಮುಟ್ಟಿದವರಲ್ಲಿ, ಯಾರೋ ಒಬ್ಬ ನನ್ನನ್ನು ಸರಿಯಾಗಿ ಅರಿತುಕೊಳ್ಳುತ್ತಾನೆ.

ಭಗವಂತನನ್ನು ಯಾರು ತಳಸ್ಪರ್ಶಿಯಾಗಿ ತಿಳಿಯಲು ಸಾಧ್ಯ? ಕೃಷ್ಣ ಹೇಳುತ್ತಾನೆ: "ಸಾವಿರಾರು ಮಾನವರಲ್ಲಿ ಕೆಲವರು ಸಿದ್ಧಿಗಾಗಿ ಪ್ರಯತ್ನಿಸುತ್ತಾರೆ. ಈ ರೀತಿ ಯೋಗದಲ್ಲಿ ತೊಡಗಿಸಿಕೊಂಡು ಅದರಲ್ಲಿ ಗುರಿಮುಟ್ಟಿದ ಅನೇಕರಲ್ಲಿ, 'ಒಬ್ಬನು ನನ್ನನ್ನು ನಿಜವಾಗಿ ಅರ್ಥ ಮಾಡಿಕೊಂಡಿದ್ದಾನೆ' ಎಂದು ಹೇಳುವುದೂ ಕಷ್ಟ". ಅಪರೋಕ್ಷ ಜ್ಞಾನದಲ್ಲಿ ಎತ್ತರಕ್ಕೇರಿದ ಸಿದ್ಧಪುರುಷರಲ್ಲೂ ಕೂಡಾ ಭಗವಂತನನ್ನು ತತ್ತ್ವತಃ ತಿಳಿದುಕೊಳ್ಳುವವರು ಬಹಳ ವಿರಳ.

ಭೂಮಿರಾಪೋSನಲೋ ವಾಯುಃ ಖಂ ಮನೋ ಬುದ್ಧಿರೇವ ಚ ।
ಅಹಂಕಾರ ಇತೀಯಂ ಮೇ ಭಿನ್ನಾ ಪ್ರಕೃತಿರಷ್ಟಧಾ ॥೪॥

ಭೂಮಿಃ ಆಪಃ ಅನಲಃ ವಾಯುಃ ಖಮ್ ಮನಃ ಬುದ್ಧಿಃ ಏವ ಚ ।
ಅಹಂಕಾರಃ ಇತಿ ಇಯಮ್ ಮೇ ಭಿನ್ನಾ ಪ್ರಕೃತಿ ಅಷ್ಟಧಾ- ಮಣ್ಣು, ನೀರು, ಬೆಂಕಿ, ಗಾಳಿ, ಆಕಾಶ, ಮನಸ್ಸು, ಬುದ್ಧಿ,[ಸುಪ್ತಪ್ರಜ್ಞೆಯಿಂದ ಕೂಡಿದ] ಅಹಂಕಾರ ಹೀಗೆ ನನ್ನ ಅಧೀನವಾದ ಈ ಜಡ ಪ್ರಕೃತಿ ಎಂಟು ಬಗೆಯಾಗಿದೆ.

ಈ ಶ್ಲೋಕ ಭಗವಂತನ ಪ್ರಪಂಚ ಸೃಷ್ಟಿಯ ವಿರಾಟ ರೂಪವನ್ನು ಸಮಷ್ಟಿಯಾಗಿ ತಿಳಿಸುತ್ತದೆ. ನಮಗೆ ತಿಳಿದಂತೆ ಸೃಷ್ಟಿ ಪೂರ್ವದಲ್ಲಿ ಈ ಸಂಪೂರ್ಣ ಜಗತ್ತು ಸೂಕ್ಷ್ಮ ರೂಪದಲ್ಲಿ ಆ ಭಗವಂತನ ಉದರದಲ್ಲಿ ನೆಲೆಗೊಂಡಿದ್ದು, ನಂತರ ಭಗವಂತ ಈ ಸೃಷ್ಟಿಯನ್ನು ನಿರ್ಮಿಸಿದ. ಹೀಗೆ ಮೊದಲು ನಿರ್ಮಾಣವಾದುದು ಈ ಜಡಪ್ರಕೃತಿ. ಇಲ್ಲಿ ಪಂಚಭೂತಗಳು(ಮಣ್ಣು, ನೀರು, ಬೆಂಕಿ, ಗಾಳಿ, ಆಕಾಶ) ಜೊತೆಗೆ ಮನಸ್ಸು, ಬುದ್ಧಿ ಮತ್ತು ಅಹಂಕಾರ. ಇವು ಒಟ್ಟಿಗೆ ಎಂಟು ಬಗೆ. ಈ ಇಡೀ ಸ್ಥೂಲಪ್ರಪಂಚ ಮಣ್ಣು ನೀರು ಬೆಂಕಿ ಗಾಳಿ ಆಕಾಶ ಇದರ ವಿಕಾರ. ಆದ್ದರಿಂದ ಈ ಪ್ರಪಂಚದಲ್ಲಿರುವ ಸಮಸ್ತ ಜಡಪದಾರ್ಥಗಳ ಮೂಲದ್ರವ್ಯ ಪಂಚಭೂತಗಳು.

ಇಲ್ಲಿ ನಮಗೆ ಒಂದು ಪ್ರಶ್ನೆ ಕಾಡಬಹುದು. ಅದೇನೆಂದರೆ ಪಂಚಭೂತಗಳ ಸೃಷ್ಟಿಯಲ್ಲಿ ಆಕಾಶದ ಸೃಷ್ಟಿ ಅಂದರೇನು? ಎಂದು. ಮೂಲತಃ ಆಕಾಶದ ಸೃಷ್ಟಿ ವಾಸ್ತವ ಅಲ್ಲ ಇದು ಸಾಪೇಕ್ಷವಾಗಿ . ಅಂತರಿಕ್ಷ **(Space)** ಮೊದಲೇ ಇತ್ತು. ಅದರಲ್ಲಿ ಭಗವಂತ ತನ್ನ ರೂಪವನ್ನು ಆವಿರ್ಭಾವ ಗೊಳಿಸುವುದೇ ಆಕಾಶ ಸೃಷ್ಟಿ. ಬಣ್ಣವಿಲ್ಲದ ಅಂತರಿಕ್ಷದಲ್ಲಿ 'ಕಣ್ಣಿಗೆ ಕಾಣದ ನೀಲ ವರ್ಣದ**(Ultraviolet)**' ಆಕಾಶ ಸೃಷ್ಟಿಯಾಯಿತು.(ಇದನ್ನು ಹದಿಮೂರನೇ ಶತಮಾನದಲ್ಲಿ ಮಧ್ವಾಚಾರ್ಯರು ಉಲ್ಲೇಖಿಸಿದ್ದಾರೆ) ಅಲ್ಲಿ ಕಂಪನ ಉಂಟಾಗಿ ಅದರಿಂದ ಗಾಳಿ ಹುಟ್ಟಿತು. ಗಾಳಿಯ ಕಂಪನದಿಂದ ಬೆಂಕಿ ಹಾಗೂ ಬೆಂಕಿಯಿಂದ ನೀರಿನ ಸೃಷ್ಟಿಯಾಯಿತು. ಈ ನೀರು ಗಟ್ಟಿಯಾಗಿ ಕಾಲ ಕ್ರಮೇಣ ಭೂಮಿಯಾಗಿ ವಿಕಸನಗೊಂಡಿತು. ಹೀಗೆ ಈ ಪಂಚಭೂತಗಳಿಂದ ಅನಂತ ವಸ್ತುಗಳ ನಿರ್ಮಾಣವಾಯಿತು.

ಮೊದಲು ಪಂಚಭೂತಗಳಿಂದ ಅನ್ನಮಯಕೋಶದ ಸೃಷ್ಟಿ; ನಂತರ ಬೆಂಕಿ, ಗಾಳಿ ಆಕಾಶದಿಂದ ಪ್ರಾಣಮಯಕೋಶದ ಸೃಷ್ಟಿ; ಈ ಪ್ರಾಣಮಯಕೋಶದ ಒಳಗೆ ಮನಸ್ಸು ಮತ್ತು ಬುದ್ಧಿಯಿಂದಾದ

ಮನೋಮಯಕೋಶದ ಸೃಷ್ಟಿ; ನಂತರ ನಮ್ಮ ನೆನಪಿನ ಶಕ್ತಿಯ ಅಹಂಕಾರತತ್ವ(awareness of self, ಚಿತ್ತ, ಚೇತನ)ದಿಂದಾದ ವಿಜ್ಞಾನಮಯಕೋಶ ಸೃಷ್ಟಿಯಾಯಿತು. ಇಲ್ಲಿ ಮನಸ್ಸು ಸೃಷ್ಟಿಯಾಯಿತು ಎಂದರೆ ಮನಸ್ಸಿನ ಅಭಿಮಾನಿ ದೇವತೆಯ ಸೃಷ್ಟಿಯಾಯಿತು ಎಂದರ್ಥ; ಭೂಮಿ ಸೃಷ್ಟಿಯಾಯಿತು ಎಂದರೆ ಈ ಜಡವಾದ ಭೂಮಿಯ ಜೊತೆಗೆ ಭೂಮಿಯ ಅಭಿಮಾನಿ ದೇವತೆಯ ಸೃಷ್ಟಿಯಾಯಿತು ಎಂದರ್ಥ. ಅದೇ ರೀತಿ ವಾಯುವಿನ ಸೃಷ್ಟಿ ಎಂದಾಗ ಅಲ್ಲಿ ವಾಯುವಿನ ಜೊತೆಗೆ ನಲವತ್ತೊಂಬತ್ತು ದೇವತೆಗಳ ಸೃಷ್ಟಿಯಾಯಿತು ಎಂದರ್ಥ. ನಮಗೆ ತಿಳಿದಂತೆ ಭೂಮಿಯನ್ನು ಆವರಿಸಿರುವ ವಾಯುವಿನ ಪದರು ನಲವತ್ತೊಂಬತ್ತು. ಭೂಮಿಯಿಂದ ವಿವಿಧ ದೂರದಲ್ಲಿ ಗಾಳಿಯ ವಿವಿಧ ಒತ್ತಡಕ್ಕನುಗುಣವಾಗಿ ಈ ವಿಭಾಗ. ಇದನ್ನು ನಿಯಮಿತವಾಗಿ ಆಯಾ ಅಭಿಮಾನಿ ದೇವತೆಗಳು ನಿರ್ವಹಿಸುತ್ತಾರೆ. ('ಭಾರದ್ವಾಜ ಸಂಹಿತದಲ್ಲಿ ಈ ಬಗ್ಗೆ ಮತ್ತು ವಿಮಾನ ತಾಂತ್ರಿಕತೆ ಬಗ್ಗೆ ಸಂಪೂರ್ಣ ವಿವರವನ್ನು ಕಾಣಬಹುದು). ಹೀಗೆ ಭಗವಂತನ ಅಧೀನವಾಗಿ ಅಷ್ಟರೂಪದ ಅಕ್ಷರಪ್ರಕೃತಿ ರೂಪುಗೊಂಡಿತು. ಈ ಅಷ್ಟ ವಿಧದ ಪ್ರಪಂಚದಲ್ಲಿ ಅಷ್ಟಾಕ್ಷರ ವಾಚ್ಯನಾಗಿ ಭಗವಂತ ತುಂಬಿದ.

ನಾದಸೃಷ್ಟಿಯ ಮೊದಲ ಸೃಷ್ಟಿ ಓಂಕಾರ. ಓಂಕಾರದಲ್ಲಿ ಎಂಟು ಅಕ್ಷರಗಳಿವೆ. ನಾಭಿಯಿಂದ ಹೊರಟು ಉಚ್ಚಾರದ ಕೊನೆಯ ತನಕ ಒಟ್ಟು ಎಂಟು ಅಕ್ಷರಗಳು. ಅವುಗಳೆಂದರೆ: ಅಕಾರ , ಉಕಾರ, ಮಕಾರ, ನಾದ, ಬಿಂದು, ಕಲೆ, ಶಾಂತ, ಅತಿಶಾಂತ. ಹೀಗೆ ಎಂಟು ಅಕ್ಷರದಿಂದ ವಾಚ್ಯನಾಗಿ; ವಿಶ್ವ, ತೈಜಸ, ಪ್ರಾಜ್ಞ, ತುರೀಯ , ಆತ್ಮ, ಅಂತರಾತ್ಮ, ಪರಮಾತ್ಮ ಮತ್ತು ಜ್ಞಾನಾತ್ಮ ಎನ್ನುವ ಎಂಟು ರೂಪದಲ್ಲಿ ಭಗವಂತ ಈ ಅಷ್ಟವಿಧ ಪ್ರಕೃತಿಯಲ್ಲಿ ತುಂಬಿದ. ಹೀಗೆ ಇಡೀ ಪ್ರಪಂಚ ಅಷ್ಟ ವಿಧದಲ್ಲಿ ವಿಕಾರಗೊಂಡಿತು.

(ಅಧ್ಯಾತ್ಮದಲ್ಲಿ ಪ್ರತಿಯೊಂದು ಸಂಖ್ಯೆಯ ಹಿಂದೆ ಒಂದು ವೇದಾಂತವಿದೆ. ಸೃಷ್ಟಿ ಪ್ರಕ್ರಿಯೆಯಲ್ಲಿ ಎಂಟರ ಮಹತ್ವವನ್ನು ಇಲ್ಲಿ ನೋಡಿದೆವು. ಬನ್ನಂಜೆಯವರ 'ಅಂಕೆಯಲ್ಲಿ ಅಧ್ಯಾತ್ಮ' ಎನ್ನುವ ಪುಟ್ಟ ಪುಸ್ತಕ ಈ ವಿಷಯದ ಮೇಲೆ ಬೆಳಕು ಚೆಲ್ಲುತ್ತದೆ).

ಅಪರೇಯಮಿತಸ್ತ್ವನ್ಯಾಂ ಪ್ರಕೃತಿಂ ವಿದ್ಧಿ ಮೇ ಪರಾಮ್ ।
ಜೀವಭೂತಾಂ ಮಹಾಬಾಹೋ ಯಯೇದಂ ಧಾರ್ಯತೇ ಜಗತ್ ॥೫॥

ಅಪರಾ ಇಯಮ್ ಇತಃ ತು ಅನ್ಯಾಮ್ ಪ್ರಕೃತಿಮ್ ವಿದ್ಧಿ ಮೇ ಪರಾಮ್ ।

ಜೀವಭೂತಾಮ್ ಮಹಾಬಾಹೋ ಯಯಾ ಇದಮ್ ಧಾರ್ಯತೇ ಜಗತ್- ಎರಡು ಪ್ರಕೃತಿಗಳಲ್ಲಿ ಇದು ಕೆಳಮಟ್ಟದ್ದು. ನನ್ನ ಅಧೀನವಾದ ಇನ್ನೊಂದು ಪ್ರಕೃತಿ ಇದಕ್ಕಿಂತ ಮಿಗಿಲಾದದ್ದು. ಅದೇ ಚೇತನ ಪ್ರಕೃತಿ; ಶ್ರೀತತ್ವ. ಎಲ್ಲಾ ಜೀವರಿಗೆ ಆಸರೆಯಾಗಿ ಎಂದೆಂದೂ ಇರುವಂತಾದ್ದು. ಮಹಾವೀರಾ, ಅದು ಈ ಜಗವನ್ನು ಹೊತ್ತುಕೊಂಡಿದೆ.

ಅಚೇತನ ಸೃಷ್ಟಿಗೆ ಒಬ್ಬ ನಿಮಿತ್ತ ಕಾರಣ ಮತ್ತು ಒಂದು ಉಪಧಾನ ಕಾರಣ. ಜಡಪ್ರಕೃತಿ ಪ್ರಪಂಚಕ್ಕೆ ಉಪಧಾನ ಕಾರಣ ಹಾಗೂ ಅದರ ಮೂಲಕ ಭಗವಂತ ಸಮಸ್ತ ಸೃಷ್ಟಿಗೆ ನಿಮಿತ್ತ ಕಾರಣ. ಚೇತನದಲ್ಲಿ ಎರಡು ವಿಧ. ಚರ ಮತ್ತು ಅಚರ. ಅಚರವಾದ ಚೇತನ(ಉದಾ-ಮರ ಗಿಡಗಳು)ದ ಸೃಷ್ಟಿಗೆ ಮೇಲೆ ಹೇಳಿದಂತೆ ಒಬ್ಬ ನಿಮಿತ್ತ ಕಾರಣ

ಮತ್ತು ಒಂದು ಉಪಧಾನ ಕಾರಣ ಸಾಕು. ಆದರೆ ಚೇತನದಲ್ಲಿ ಚರವಾದ ಚೇತನ(ಅಂಡಜ ಮತ್ತು ಜರಾಯು) ಸೃಷ್ಟಿಗೆ ಒಂದು ನಿಮಿತ್ತ ಕಾರಣ ಸಾಲದು. ಇಲ್ಲಿ ಎರಡು ನಿಮಿತ್ತ ಕಾರಣ ಬೇಕು. ಒಂದು ತಂದೆ, ಒಂದು ತಾಯಿ. ಎರಡು ಚೇತನದಿಂದ ಒಂದು ಚೇತನ ಸೃಷ್ಟಿ. ಇದರ ಪ್ರಾರಂಭ ಮೂಲ ಸೃಷ್ಟಿಯಲ್ಲಿಯೇ ಆಗಿದೆ. ಹೀಗೆ ಎರಡು ಚೇತನ ಹಾಗೂ ಒಂದು ಜಡ ಸೇರಿ ಈ ಸಮಸ್ತ ಸೃಷ್ಟಿಯಾಗಿರುವುದು. ಹಿಂದೆ ಹೇಳಿದಂತೆ ವಸ್ತುತಃ ಪ್ರಳಯಕಾಲದಲ್ಲಿ ಇಡೀ ಪ್ರಪಂಚ ಭಗವಂತನ ಉದರದಲ್ಲೇ ಇದ್ದದ್ದು. ಆದ್ದರಿಂದ ಅವನೇ ತಂದೆ, ಅವನೇ ತಾಯಿ. ಆದರೂ ಈ ಪ್ರಪಂಚದಲ್ಲಿರುವ ಜೀವ ಜಾತದ ಸೃಷ್ಟಿಗೆ ಮುಂದೆ ಹೇಗೆ ತಂದೆ ತಾಯಿ ಎನ್ನುವ ಎರಡು ಚೇತನ ಬೇಕೋ ಅದನ್ನು ಸೃಷ್ಟಿಯ ಆದಿಯಲ್ಲೇ ಭಗವಂತ ಮಾಡಿದ. ಪ್ರಪಂಚದಲ್ಲಿ ಯಾವ ರೀತಿ ಜೀವದ ಸೃಷ್ಟಿ ಪ್ರಕ್ರಿಯೆ ಮುಂದುವರಿಯುತ್ತದೋ ಅದೇ ರೀತಿ ಪ್ರಾರಂಭದಿಂದ ಆ ವ್ಯವಸ್ಥೆ ಮಾಡಿದ ಭಗವಂತ. ಅದರದ್ದೇ ಮುಂದುವರಿಕೆ ಈ ಸೃಷ್ಟಿ.

ಈ ಶ್ಲೋಕದಲ್ಲಿ ಕೃಷ್ಣ ಹೇಳುತ್ತಾನೆ "ನಾನು ಹಿಂದೆ ಹೇಳಿದ ಪ್ರಕೃತಿ 'ಜಡಪ್ರಕೃತಿ' ; ಆದರೆ ಅದಕ್ಕಿಂತ ಬಿನ್ನವಾದ ಮತ್ತು ಶ್ರೇಷ್ಠವಾದ ಇನ್ನೊಂದು ಪ್ರಕೃತಿ ಇದೆ" ಎಂದು. ಅದೇ ಇಡೀ ಪ್ರಪಂಚಕ್ಕೆ ಮಾತೃ ಸ್ಥಾನ ಕೊಟ್ಟಿರುವ ಚಿತ್ ಪ್ರಕೃತಿ. ವೇದದಲ್ಲಿ ಹೇಳುವಂತೆ ಜಡಪ್ರಕೃತಿ 'ಅಕ್ಷರ', ಅದಕ್ಕಿಂತ ಭಿನ್ನವಾದ ಚೇತನಪ್ರಕೃತಿ-'ಪರಮಾಕ್ಷರ'. ಭಗವಂತ 'ಪರತ-ಪರಮಾಕ್ಷರ'. ಹೀಗೆ ಭಗವಂತನಿಗೂ ಮತ್ತು ಪ್ರಪಂಚಕ್ಕೂ ಮಾಧ್ಯಮವಾಗಿ ಶ್ರೀತತ್ವ(ಶ್ರೀಲಕ್ಷ್ಮಿ)ವಿದೆ. ಈ ಕಾರಣದಿಂದ ಲಕ್ಷ್ಮಿಯನ್ನು ಲೋಕಮಾತೆ ಎನ್ನುತ್ತಾರೆ. ಈ ಜಗತ್ತನ್ನು ಸೃಷ್ಟಿ ಮಾಡುವಾಗ ಜಡ ಪ್ರಕೃತಿಯನ್ನು ಉಪಧಾನ ಕಾರಣವಾಗಿ ಬಳಸಿದರೆ, ಆ ಜಡವಾದ ಶರೀರ(ಪಿಂಡಾಂಡ)ದಲ್ಲಿ ಜೀವದ ಸೃಷ್ಟಿಯಾಗಬೇಕಾದರೆ ಜೀವಭೂತಳಾದ ಚೇತನಾ ಶಕ್ತಿ ಹೊಂದಿರುವ ಚಿತ್ ಪ್ರಕೃತಿಯನ್ನು ಕಾರಣವಾಗಿ ಬಳಸಿದ ಭಗವಂತ. ಹೀಗೆ ಜಗತ್ತಿನ ಮೊದಲ ಜೀವ ಚತುರ್ಮುಖನ ಸೃಷ್ಟಿ ಶ್ರೀತತ್ವದಿಂದಾಯಿತು.

ಹೀಗೆ ಜಗತ್ತಿನ ಮೂಲದಲ್ಲೇ ಪ್ರಕೃತಿ ಮತ್ತು ಪುರುಷ ಎನ್ನುವ ಎರಡು ವಿಧದ ಚೇತನವನ್ನು ನಾವು ಕಾಣುತ್ತೇವೆ. ಜೀವ ಸ್ವರೂಪದಲ್ಲೂ ಗಂಡು ಮತ್ತು ಹೆಣ್ಣು ಎನ್ನುವ ಎರಡು ಪ್ರಭೇದವಿದೆ ಎನ್ನುವುದು ಸೃಷ್ಟಿಯ ಆದಿಯಿಂದಲೇ ತಿಳಿಯುತ್ತದೆ. ಪುರುಷ ಮತ್ತು ಪ್ರಕೃತಿ ಎನ್ನುವ ಭಗವಂತನ ಎರಡು ಮುಖದಿಂದ ಈ ಸೃಷ್ಟಿಯಾಯಿತು. ಜಡಕ್ಕೆ ಲಿಂಗ ಭೇದವಿಲ್ಲ. ಆದರೂ ನಾವು ಕೆಲವು ಜಡ ವಸ್ತುವನ್ನು ಹೆಣ್ಣಾಗಿ ಮತ್ತು ಗಂಡಾಗಿ ಗುರುತಿಸುತ್ತೇವೆ. ಇದು ಆ ವಸ್ತುವಿನ ಅಭಿಮಾನಿ ದೇವತೆಯ ಲಿಂಗಕ್ಕನುಗುಣವಾಗಿ ಗುರುತಿಸಲ್ಪಟ್ಟಿರುವುದು. ಉದಾಹರಣೆಗೆ ನದಿ: ನದಿಯ ಅಭಿಮಾನಿ ದೇವತೆಗಳಲ್ಲಿ ಹೆಚ್ಚಿನವರು ಸ್ತ್ರೀಲಿಂಗ; ಅದೇ ರೀತಿ ಭೂಮಿಯ ಅಭಿಮಾನಿ ದೇವತೆ ಕೂಡಾ ಹೆಣ್ಣು. ಈ ಕಾರಣಕ್ಕಾಗಿ ನದಿಯನ್ನು, ಭೂಮಿಯನ್ನು ನಾವು ತಾಯಿ ರೂಪದಲ್ಲಿ ಕಾಣುತ್ತೇವೆ.

ಹೀಗೆ ಜಗತ್ತಿನ ಮೂಲ ಸಂಗತಿ ಭಗವಂತ(ಪುರುಷ) ಮತ್ತು ಆತನ ಅಧೀನವಾಗಿ ಜಡ ಪ್ರಕೃತಿ ಮತ್ತು ಚಿತ್ ಪ್ರಕೃತಿ. ಇವು ಸದಾ ನಿತ್ಯ -ಎಂದೂ ನಾಶವಿಲ್ಲದವು. ಆಕಾರದ(ವಿಕೃತಿಯ) ನಾಶವಾಗುತ್ತದೆ ಹೊರತು ಮೂಲದ್ರವ್ಯ ಉತ್ಪತ್ತಿ ನಾಶ ಜಗತ್ತಿನಲ್ಲಿಲ್ಲ. ಆದ್ದರಿಂದ ಇವು ಕ್ಷರವಿಲ್ಲದ(ಅ-ಕ್ಷರ) ಸಂಗತಿಗಳು. ಈ ಮೂರರಿಂದ 'ಕ್ಷರ' ವಾದ ಪ್ರಪಂಚ ಸೃಷ್ಟಿಯಾಗುತ್ತದೆ.

ಏತದ್ಯೋನೀನಿ ಭೂತಾನಿ ಸರ್ವಾಣೀತ್ಯುಪಧಾರಯ ।
ಅಹಂ ಕೃತ್ಸ್ನಸ್ಯ ಜಗತಃ ಪ್ರಭವಃ ಪ್ರಳಯಸ್ತಥಾ ॥೬॥

ಏತತ್ ಯೋನೀನಿ ಭೂತಾನಿ ಸರ್ವಾಣಿ ಇತಿ ಉಪಧಾರಯ ।
ಅಹಮ್ ಕೃತ್ಸ್ನಸ್ಯ ಜಗತಃ ಪ್ರಭವಃ ಪ್ರಳಯಃ ತಥಾ-ಈ ಎರಡು ಪ್ರಕೃತಿಗಳಿಂದಲೇ ಎಲ್ಲಾ ಜೀವಿಗಳು ರೂಪುಗೊಂಡಿವೆ ಎಂದು ತಿಳಿ. ನಾನೇ ಜಗದ ಎಲ್ಲಾ ಹುಟ್ಟು-ಸಾವುಗಳಿಗೆ ಕಾರಣನಾಗಿದ್ದೇನೆ.

ಜಡ ಪ್ರಕೃತಿ ಮತ್ತು ಚಿತ್ ಪ್ರಕೃತಿ ಇವೇ ಇಡೀ ಜಗತ್ತಿನ ಎಲ್ಲಾ ಜೀವಜಾತಕ್ಕೆ ಮೂಲ ಕಾರಣ. ಭಗವಂತ ಜೀವಜಾತದ ಹಿಂದೆ ತಂದೆಯಾಗಿ, ಲಕ್ಷ್ಮೀದೇವಿ ತಾಯಿಯಾಗಿ ನಿಂತು ಈ ಜಗತ್ತನ್ನು ಸೃಷ್ಟಿ ಮಾಡಿದರು. ತಾಯಿಯ ಗರ್ಭದಲ್ಲಿ ಬೆಳೆಯುವ ಭ್ರೂಣದಂತೆ ಜಡಪ್ರಕೃತಿ ವಿಕಾರಗೊಂಡಿತು. ಹೀಗೆ ಚಿತ್ ಪ್ರಕೃತಿ ಜಡ ಪ್ರಕೃತಿಗೆ ರೂಪ ಕೊಟ್ಟಳು, ಕೊಟ್ಟು ಧಾರಣೆ ಮಾಡಿದಳು, ಅದೇ ಜಗತ್ತಾಯಿತು.
ಭಗವಂತನ ಶಕ್ತಿ ಆಧಾನದಿಂದ, ಪ್ರೇರಣೆಯಿಂದ, ಜಡ ಮತ್ತು ಚಿತ್ ಪ್ರಕೃತಿಯ ಮೂಲಕ ಈ ಜಗತ್ತಿನ ಹುಟ್ಟಿಗೆ ಭಗವಂತ ಹೇಗೆ ಕಾರಣನೋ, ಹಾಗೇ ಇಡೀ ಜಗತ್ತಿನ ಪ್ರಳಯ ಕೂಡಾ ಭಗವಂತ. ಕೃಷ್ಣ ಹೇಳುತ್ತಾನೆ " ಸಮಸ್ತ ಜಗತ್ತಿನ ಉತ್ಪತ್ತಿಗೆ ಮೂಲ ಕಾರಣ ನಾನು, ಜಗತ್ತಿನ ಸಂಹಾರಕ್ಕೆ ಕಾರಣ ನಾನು" ಎಂದು. ಈ ಜಗತ್ತಿನ ಹುಟ್ಟಿನ ಮೊದಲಿದ್ದವ, ಹುಟ್ಟಿಗೆ ಕಾರಣ, ಸಂಹಾರಕ್ಕೆ ಕಾರಣ, ಸಂಹಾರದ ನಂತರ ಇರುವವ ಆ ಭಗವಂತ.

ನಮ್ಮಲ್ಲಿ ಕೆಲವರು ಕೇಳುವುದಿದೆ: ಜಡಪ್ರಕೃತಿಗೆ ನಿಯಾಮಕ ಶಕ್ತಿ- ಚೇತನಪ್ರಕೃತಿ, ಚೇತನ ಪ್ರಕೃತಿಯನ್ನು ಪ್ರೇರಣೆ ಮಾಡಿ ಸೃಷ್ಟಿ ಸಂಹಾರದಲ್ಲಿ ತೊಡಗಿಸುವವ 'ಪುರುಷ' ನಾಮಕ ಭಗವಂತ. ಹಾಗಾದರೆ ಈ ಭಗವಂತನನ್ನು ನಿಯಂತ್ರಿಸುವವರು ಯಾರು? ಎಂದು. ಇದಕ್ಕೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರಿಸುತ್ತಾನೆ.

ಮತ್ತಃ ಪರತರಂ ನಾನ್ಯತ್ ಕಿಂಚಿದಸ್ತಿ ಧನಂಜಯ ।
ಮಯಿ ಸರ್ವಮಿದಂ ಪ್ರೋತಂ ಸೂತ್ರೇ ಮಣಿಗಣಾ ಇವ ॥೭॥

ಮತ್ತಃ ಪರತರಮ್ ನ ಅನ್ಯತ್ ಕಿಂಚಿತ್ ಅಸ್ತಿ ಧನಂಜಯ ।
ಮಯಿ ಸರ್ವಮ್ ಇದಂ ಪ್ರೋತಂ ಸೂತ್ರೇ ಮಣಿಗಣಾಃ ಇವ-ಧನಂಜಯಾ, ನಾನಲ್ಲದೆ ಇನ್ನೊಂದು ಪರತರ ವಸ್ತು ಇಲ್ಲ. ಎಲ್ಲವೂ ನನ್ನಲ್ಲೇ ಹೆಣೆದುಕೊಂಡಿದೆ-ದಾರದಲ್ಲಿ ಮಣಿಗಳ ರಾಶಿ ಹೇಗೆ ಹಾಗೆ.

ಕೃಷ್ಣ ಹೇಳುತ್ತಾನೆ: " ನನ್ನನ್ನು ಮೀರಿ ನನ್ನಿಂದ ಹಿರಿದಾದ, ನನಗಿಂತ ಬೇರೆಯಾದ ಇನ್ನೊಂದು ವಸ್ತುವಿಲ್ಲ" ಎಂದು. ಚಿತ್ ಪ್ರಕೃತಿ, ಜಡ ಪ್ರಕೃತಿ, ಇದರಿಂದ ದೇಹ ಧಾರಣೆ ಮಾಡಿದ ಜೀವಜಾತ, ವಾಸಿಸುವ ಬ್ರಹ್ಮಾಂಡ, ಈ ಪಿಂಡಾಂಡ, ಎಲ್ಲವೂ ಕೂಡಾ ಭಗವಂತನಲ್ಲಿ ದಾರದಲ್ಲಿ ಮಣಿಗಳು ಹೆಣೆದುಕೊಂಡಂತೆ ಹೆಣೆದುಕೊಂಡಿವೆ. ಇಡೀ ವಿಶ್ವವನ್ನು, ಜೀವಜಾತವನ್ನು ಹೆಣೆದ ಸೂತ್ರ ಆ ಭಗವಂತ.

ಮುಂದೆ ಕೃಷ್ಣ ಒಂದೊಂದು ವಸ್ತುವಿನಲ್ಲಿ ಯಾವರೀತಿ ಭಗವಂತನ ವಿಭೂತಿ ಅಡಗಿದೆ ಎನ್ನುವ ವಿಜ್ಞಾನವನ್ನು ಸುವಿವರವಾಗಿ ವಿವರಿಸುತ್ತಾನೆ.

ರಸೋSಹಮಪ್ಸು ಕೌಂತೇಯ ಪ್ರಭಾSಸ್ಮಿ ಶಶಿಸೂರ್ಯಯೋಃ ।
ಪ್ರಣವಃ ಸರ್ವವೇದೇಷು ಶಬ್ದಃ ಖೇ ಪೌರುಷಂ ನೃಷು ॥೮॥

ರಸಃ ಅಹಮ್ ಅಪ್ಸು ಕೌಂತೇಯ ಪ್ರಭಾ ಅಸ್ಮಿ ಶಶಿ ಸೂರ್ಯಯೋಃ |
ಪ್ರಣವಃ ಸರ್ವವೇದೇಷು ಶಬ್ದಃ ಖೇ ಪೌರುಷಮ್ ನೃಷು – ಕೌಂತೇಯಾ ನೀರಿನಲ್ಲಿ ರಸವಿರುವುದು ನನ್ನಿಂದ[ನೀರಿನಲ್ಲಿದ್ದು ರಸದ ಸವಿಯನ್ನುಣ್ಣಿಸುವುದರಿಂದ 'ರಸ' ನಾಮಕ.] ಚಂದ್ರ-ಸೂರ್ಯರಲ್ಲಿ ಬೆಳಕಿರುವುದು ನನ್ನಿಂದ [ಚಂದ್ರ –ಸೂರ್ಯರಲ್ಲಿದ್ದು ಬೆಳಗಿಸುವುದರಿಂದ 'ಪ್ರಭಾ' ನಾಮಕ.]ಎಲ್ಲಾ ವೇದಗಳಲ್ಲಿ 'ಓಂಕಾರ' ಸಾರವಾದದ್ದು ನನ್ನಿಂದ.[ಎಲ್ಲಾ ವೇದಗಳಲ್ಲಿದ್ದು ನಾನೇ ಸ್ತುತಿಸುವುದರಿಂದ 'ಪ್ರಣವ' ನಾಮಕ] ಆಗಸದಲ್ಲಿ ಸದ್ದು ಮೂಡುವುದು ನನ್ನಿಂದ [ಆಗಸದಲ್ಲಿ ಸದ್ದು ಹೊರಡಿಸುವುದರಿಂದ 'ಶಬ್ದ' ನಾಮಕ.] ಗಂಡಸರಲ್ಲಿ ಬೀರ ನನ್ನಿಂದ[ಗಂಡಸರಲ್ಲಿದ್ದು ಬೀರವನ್ನಿತ್ತುದರಿಂದ 'ಪೌರುಷ' ನಾಮಕ].

ಭಗವಂತ ಈ ಪ್ರಪಂಚವನ್ನು ಸೃಷ್ಟಿ ಮಾಡಿದ, ಆನಂತರ ಪ್ರಪಂಚದೊಳಗೆ ಪ್ರವೇಶ ಮಾಡಿದ ಎನ್ನುವುದನ್ನು ಶಾಸ್ತ್ರಗಳು ಹೇಳುತ್ತವೆ. ಇಲ್ಲಿ ನಮಗೆ ಸ್ವಲ್ಪ ಗೊಂದಲವಾಗುತ್ತದೆ. "ಭಗವಂತ ಸರ್ವವ್ಯಾಪ್ತ, ಆತ ಪ್ರವೇಶ ಮಾಡುವುದು ಅಂದರೇನು?" ಇದು ನಮ್ಮ ಪ್ರಶ್ನೆ. ಇದು ಅರ್ಥವಾಗಬೇಕಾದರೆ ಸರ್ವವ್ಯಾಪ್ತ ಭಗವಂತನಿಗೆ ಅನಂತ ರೂಪ ಎನ್ನುವ ವಿಚಾರವೂ ನಮಗೆ ತಿಳಿದಿರಬೇಕು. ಆತ ವ್ಯಾಪ್ತವಾದ ಒಂದು ರೂಪದಲ್ಲಿ ಸರ್ವತ್ರ ಇದ್ದಾನೆ ಮತ್ತು ಒಂದೊಂದು ವಸ್ತುವಿನಲ್ಲೂ ವಿಶೇಷ ಶಕ್ತಿಪ್ರದನಾಗಿ, ವಿಶೇಷ ಶಕ್ತಿ ಅಭಿವ್ಯಂಜಕನಾದ ಒಂದು ವಿಭೂತಿ ರೂಪದಲ್ಲಿ ಅಲ್ಲಿ ಪ್ರವೇಶ ಮಾಡುತ್ತಾನೆ. ಹೀಗೆ ಒಂದು ವಸ್ತುವಿನಲ್ಲೇ ಭಗವಂತನ ಅನೇಕ ರೂಪಗಳಿರಬಹುದು. ಒಂದು ವಸ್ತುವಿಗೆ ಆ ಶಕ್ತಿವಿಶೇಷವನ್ನು ಕೊಟ್ಟ ಭಗವಂತನ ರೂಪವನ್ನು ಆತನ ವಿಭೂತಿ ರೂಪ ಎನ್ನುತ್ತಾರೆ. ಇದು ಅವನ ಲೀಲೆ. ಭಗವಂತ ವಿಭೂತಿ ರೂಪದಲ್ಲಿ ಒಂದು ವಸ್ತುವಿನೊಳಗೆ ಪ್ರವೇಶಿಸಿ, ಆ ವಸ್ತುವಿನಲ್ಲಿ ಒಂದು ಶಕ್ತಿವಿಶೇಷವನ್ನು ಅಭಿವ್ಯಕ್ತಗೊಳಿಸುತ್ತಾನೆ-ಇದು ವಿಭೂತಿ ವಿಜ್ಞಾನ.

ಈ ಶ್ಲೋಕದ ಪ್ರಾರಂಭದಲ್ಲಿ ಕೃಷ್ಣ ಪಂಚಭೂತಗಳಲ್ಲಿ ಬಹಳ ಮುಖ್ಯವಾದ ನೀರಿನಲ್ಲಿನ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ನಮ್ಮ ಉಪಾಸನೆಯಲ್ಲಿ ಭಗವಂತನನ್ನು ಜಲದಲ್ಲಿ ಉಪಾಸನೆ ಮಾಡುವುದು ಬಹಳ ವಿಶೇಷ. ಎಲ್ಲಾ ಅನುಷ್ಠಾನಕ್ಕೂ(ಸ್ನಾನ, ಅರ್ಗ್ಯ, ತರ್ಪಣ ಇತ್ಯಾದಿ) ಕೂಡಾ ಬೇಕಾಗಿರುವುದು ನೀರು. ಅರ್ಘ್ಯಂ ಸಮರ್ಪಯಾಮಿ। ಗಂದಾಕ್ಷತಂ ಸಮರ್ಪಯಾಮಿ। ಪುಷ್ಪಂ ಸಮರ್ಪಯಾಮಿ। ನೈವೇದ್ಯಂ ಸಮರ್ಪಯಾಮಿ। ತಾಂಬೂಲಂ ಸಮರ್ಪಯಾಮಿ। ಎಂದು ಸಮರ್ಪಣೆ ಮಾಡುವುದು ಒಂದು ಉದ್ಧರಣೆ ನೀರನ್ನು! ಹೀಗೆ ಏನೂ ಇಲ್ಲದಾಗ ಎಲ್ಲವುದಕ್ಕೂ ಪ್ರತಿನಿಧಿಯಾಗಿ ನೀರನ್ನು ಅರ್ಪಿಸುತ್ತೇವೆ. ಏಕೆಂದರೆ ಭಗವಂತನ ಸೃಷ್ಟಿಯ ವಿಸ್ತಾರಕ್ಕೆ ನೀರು ಮೂಲದ್ರವ್ಯ. ಅದನ್ನು ಭಕ್ತಿಯಿಂದ ಅರ್ಪಿಸಿದರೆ ಎಲ್ಲವನ್ನು ಅರ್ಪಿಸಿದಂತೆ.

ಇಲ್ಲಿ ಕೃಷ್ಣ ಹೇಳುತ್ತಾನೆ: "ರಸಃ ಅಹಮ್ ಅಪ್ಸು ಕೌಂತೇಯ" ಎಂದು. ಅಂದರೆ "ರಸ ನಾಮಕನಾಗಿ ನೀರಿನಲ್ಲಿ ನಾನು ರಸವಾಗಿದ್ದೇನೆ" ಎಂದು. ಸಂಸ್ಕೃತದಲ್ಲಿ ರಸ ಎಂದರೆ ಸಾರಭೂತವಾದದ್ದು, ಹರಿಯುವಿಕೆ, ಇತ್ಯಾದಿ

ಅನೇಕ ಅರ್ಥಗಳಿವೆ. ಹರಿಯುವ ಶಕ್ತಿ ನೀರಿನ ವಿಶಿಷ್ಟ ಗುಣ(exclusive quality). ಹರಿಯುವ ಶಕ್ತಿಯಾಗಿ 'ಹರಿ' ನೀರಿನಲ್ಲಿ ಕುಳಿತಿರುವುದರಿಂದ ನೀರಿಗೆ ಆ ಶಕ್ತಿ ಬಂತು. ಉಪಾಸನೆಯಲ್ಲಿ ಈ ಜ್ಞಾನ ಬಹಳ ಮುಖ್ಯ. ಶಾಸ್ತ್ರೀಯವಾಗಿ ಗುಹ್ಯ ಭಾಷೆಯಲ್ಲಿ ನೀರಿಗೆ 'ವಿಷ್ಣುಃ' ಎನ್ನುತ್ತಾರೆ. 'ವಿಷಂತಿ ಅತ್ರ ಇತಿ ವಿಷ್ಣುಃ'- ಅಂದರೆ ಯಾವುದರ ಒಳಗೆ ಹೋಗಿ ಹೊರಗೆ ಬರಲು ಸಾಧ್ಯವೋ ಅದು ವಿಷ್ಣುಃ.

ಭಗವಂತ ನೀರಿನಲ್ಲಿ ರಸವಾಗಿ(ರುಚಿಯಾಗಿ) ಕುಳಿತ. ನಮಗೆ ರುಚಿಯ ಅನುಭವವನ್ನು ಕೊಟ್ಟು ಅವನು ನೀರಿನಲ್ಲಿ ರಸವಾಗಿ ಕೂರದೇ ಇದ್ದಿದ್ದರೆ ನಮಗೆ ನಾಲಿಗೆ ಇದ್ದೂ ಏನೂ ಉಪಯೋಗವಾಗುತ್ತಿರಲಿಲ್ಲ. ಪ್ರತಿಯೊಂದರಲ್ಲೂ ಸಾರಭೂತವಾದ ಇಂತಹ ಅಸಾಧಾರಣ ಶಕ್ತಿ ಏನಿದೆ-ಅದು ಆ ಭಗವಂತನ ವಿಭೂತಿ. ಆತ ರಸಃ-'ರ' ಎಂದರೆ ಆನಂದ ; 'ಸ' ಎಂದರೆ ಜ್ಞಾನ-ಆದ್ದರಿಂದ ರಸಃ ನಾಮಕ ಭಗವಂತ ಜ್ಞಾನಾನಂದಪೂರ್ಣ.

ನೀರಿನ ನಂತರ ಕೃಷ್ಣ ಸೂರ್ಯ ಮತ್ತು ಚಂದ್ರನ ಉದಾಹರಣೆಯನ್ನು ತೆಗೆದುಕೊಳ್ಳುತ್ತಾನೆ. ಕೃಷ್ಣ ಹೇಳುತ್ತಾನೆ- "ಪ್ರಭಾ ಅಸ್ಮಿ ಶಶಿ ಸೂರ್ಯಯೋಃ" ಎಂದು. ಅಂದರೆ "ಸೂರ್ಯ ಚಂದ್ರರೊಳಗೆ ಪ್ರಭಾ ನಾಮಕನಾಗಿದ್ದು ಬೆಳಗಿಸುವವ ನಾನು". ನಮಗೆ ಪ್ರಾಣಶಕ್ತಿ ಹರಿದು ಬರುವುದು ಸೂರ್ಯ ಮತ್ತು ಚಂದ್ರನಿಂದ. ಮನುಷ್ಯನ ಜೀವನಕ್ಕೆ ವಿಶೇಷವಾಗಿ ಸೌರಶಕ್ತಿ ಕಾರಣವಾದರೂ ಕೂಡಾ ಸಮಸ್ತ ವನಸ್ಪತಿಗಳಿಗೆ ಚಂದ್ರನ ವಿಶೇಷ ಸಂಬಂಧವಿದೆ. ಈ ಕಾರಣಕ್ಕಾಗಿ ವನಸ್ಪತಿ ತಜ್ಞರು ಯಾವ ಯಾವ ಮರದಲ್ಲಿ ಎಂತೆಂತಾ ಶಕ್ತಿ ಬೆಳದಿಂಗಳಿಂದ ನಿಷ್ಪನ್ನವಾಗುತ್ತದೆ ಎನ್ನುವುದನ್ನು ಅಧ್ಯಯನ ಮಾಡಿ ಚಂದ್ರನ ಗತಿಗನುಗುಣವಾಗಿ ವನಸ್ಪತಿಗಳನ್ನು ಕತ್ತರಿಸುತ್ತಿದ್ದರು. ಹಿಂದಿನ ಕಾಲದಲ್ಲಿ ಮನೆ ಕಟ್ಟಲು ಬಳಸುವ ಮರವನ್ನು ಚಂದ್ರನ ಗತಿಗನುಗುಣವಾಗಿ ಅಧ್ಯಯನ ಮಾಡಿ ಕತ್ತರಿಸುತ್ತಿದ್ದರು. ಇದನ್ನು ತಿಳಿಯದೇ ಮರವನ್ನು ಕತ್ತರಿಸಿದರೆ ಆ ಮರ ಬಾಳಿಕೆ ಬಾರದು. ಭಗವಂತ ಚಂದ್ರ ಸೂರ್ಯರಿಂದ ನಿರಂತರ ಶಕ್ತಿ ಹರಿಸುವುದರಿಂದ ಈ ಜೀವಲೋಕ ಬದುಕಿದೆ. ಸೂರ್ಯ ಚಂದ್ರರ ಶಕ್ತಿಪಾತವಾಗದೇ ಇದ್ದರೆ ನಮಗೆ ಬದುಕೇ ಇಲ್ಲ. ಇದಕ್ಕಾಗಿ ಭಗವಂತನನ್ನು 'ಕೇಶವ' ಎನ್ನುತ್ತಾರೆ. ಸೂರ್ಯ ಚಂದ್ರರ ಕಿರಣದಲ್ಲಿದ್ದು, ಆ ಪ್ರಕಾಶದ ಮೂಲಕ, ಬಿಸಿಲು ಮತ್ತು ಬೆಳದಿಂಗಳ ಮೂಲಕ ನಮಗೆ ಬದುಕನ್ನು ಕೊಡುವವ ಕೇಶವ. ಚಂದ್ರನ ಬೆಳಕಿನಲ್ಲಿ, ಸೂರ್ಯನ ಬೆಳಕಿನಲ್ಲಿ ಆ ಬೆಳಗುವ ಶಕ್ತಿಯನ್ನು ಕೊಟ್ಟು, ಆ ಬೆಳಕಿನಲ್ಲಿ ಬೆಳಕಾಗಿ 'ಪ್ರಭಾ' ಶಬ್ದವಾಚ್ಯ ಭಗವಂತ ಕೂತಿದ್ದಾನೆ. 'ಪ್ರ' ಎಂದರೆ ಪ್ರಕೃಷ್ಟವಾದ, 'ಭ' ಎಂದರೆ ಜ್ಞಾನಾನಂದಮಯವಾದ. ಭಗವಂತ ಜ್ಞಾನಾನಂದಮಯವಾದ ಬೆಳಕಾಗಿ ಸೂರ್ಯ ಚಂದ್ರರಲ್ಲಿದ್ದು ಜೀವಜಾತಕ್ಕೆ ನಿರಂತರ ಪ್ರಾಣಶಕ್ತಿಯನ್ನು ಹರಿಸುತ್ತಿದ್ದಾನೆ.

ಕೃಷ್ಣ ಮುಂದುವರಿದು ಹೇಳುತ್ತಾನೆ: "ಎಲ್ಲಾ ವೇದಗಳಲ್ಲೂ, ವೇದ ಶಬ್ದ ವಾಚ್ಯನಾಗಿ ನಾನು ತುಂಬಿದ್ದೇನೆ" ಎಂದು. 'ವೇದ' ಎಂದರೆ 'ಅರಿವು ಕೊಡುವಂತಾದ್ದು' ಎಂದರ್ಥ. ಎಲ್ಲರಿಗೂ ಅರಿವು ಕೊಡುವವ ಭಗವಂತ. ಸ್ವಯಂ ಪೂರ್ಣನಾಗಿ ಸರ್ವರಿಗೂ ಜ್ಞಾನಪ್ರದನಾಗಿ, ಸರ್ವಶಬ್ದವಾಚ್ಯನಾಗಿ, ಸರ್ವ ವೇದಗಳಲ್ಲಿ ಭಗವಂತ ನೆಲೆಸಿದ್ದಾನೆ. ವೇದದ ಅರ್ಥ ತಿಳಿದವನ ಬದುಕು ಸದಾ ಮಂಗಳಮಯ. ಅಂತಹ ವೇದದ ಸಾರ 'ಓಂಕಾರ'- ಅದೇ ಪ್ರಣವಃ.

ಇಲ್ಲಿ ನಾವು ಒಂದು ವಿಷಯವನ್ನು ಅರ್ಥ ಮಾಡಿಕೊಳ್ಳಬೇಕು. ಓಂಕಾರ ಸರ್ವ ವೇದಗಳ ಸಾರ ಎನ್ನುತ್ತಾರೆ. ಅದು ಹೇಗೆ ಎಂದು. ವೇದಗಳು ಅನೇಕ. ಋಗ್ವೇದದಲ್ಲಿ 24 ಶಾಖೆ, ಯಜುರ್ವೇದದಲ್ಲಿ 101 ಶಾಖೆ, ಸಾಮವೇದದಲ್ಲಿ 1000 ಶಾಖೆ, ಅಥರ್ವವೇದದಲ್ಲಿ 12 ಶಾಖೆ. ಹೀಗೆ ಒಟ್ಟು 1137 ಸಂಹಿತೆಗಳು. ಅದಕ್ಕೆ ಅಷ್ಟೇ

ಬ್ರಾಹ್ಮಣಗಳು, ಅರಣ್ಯಕಗಳು, ಉಪನಿಷತ್ತುಗಳು. ಹೀಗೆ ವೇದವೆಂದರೆ ವಿಪುಲವಾದ ವೈದಿಕ ವಾಙ್ಮಯ. ಎಷ್ಟೇ ವೇದಗಳಿದ್ದರೂ ಕೂಡಾ ಮೂಲತಃ ವೇದದಲ್ಲಿ ಪ್ರಮುಖವಾಗಿ ಮೂರು ವಿಭಾಗವಿದೆ. ಪದ್ಯರೂಪ(ಋಗ್ವೇದ), ಗದ್ಯರೂಪ(ಯಜುರ್ವೇದ) ಮತ್ತು ಗಾನರೂಪ(ಸಾಮವೇದ). ಈ ಮೂರು ವೇದಗಳ ಮೂರು ಅಕ್ಷರಗಳನ್ನು ತೆಗೆದುಕೊಂಡು ನಿರ್ಮಾಣವಾಗಿರುವುದು ಓಂಕಾರ. "ಓಂಕಾರಕ್ಕೆ ಸಾರತ್ವವನ್ನು ಕೊಟ್ಟು ಸಾರಭೂತನಾಗಿ 'ಪ್ರಣವಃ' ಶಬ್ದವಾಚ್ಯನಾಗಿ ನಾನು ಓಂಕಾರದಲ್ಲಿ ನೆಲೆಸಿದ್ದೇನೆ" ಎನ್ನುತ್ತಾನೆ ಕೃಷ್ಣ. ಇದು ಬಹಳ ವಿಚಾರಗರ್ಭಿತ ಸಂಗತಿ. ಪ್ರಾಚೀನರು ಮೂರು ವೇದಗಳನ್ನು ಭಟ್ಟಿಇಳಿಸಿ ಅದರ ಸಾರವಾದ ಮೂರು ವರ್ಗಗಳ ಒಂದು ಸೂಕ್ತ ಮಾಡಿದರು. ಅದೇ ಪುರುಷಸೂಕ್ತ. ಈ ಕಾರಣದಿಂದ ವೇದಸೂಕ್ತಗಳಲ್ಲೇ ಪುರುಷಸೂಕ್ತ ಅತ್ಯಂತ ಶ್ರೇಷ್ಠವಾದ ಸೂಕ್ತ. ಈ ಸೂಕ್ತವನ್ನು ಮತ್ತೆ ಭಟ್ಟಿಇಳಿಸಿ ಮೂರು ಪಾದಗಳ ಗಾಯತ್ರಿ ಮಂತ್ರ(ತತ್ಸವಿತುರ್ವರೇಣ್ಯಂ ಭರ್ಗೋ ದೇವಸ್ಯ ಧೀಮಹಿ ಧಿಯೋ ಯೋನಃ ಪ್ರಚೋದಯಾತ್) ನಿರ್ಮಾಣವಾಯಿತು. 'ತತ್ ಸವಿತುರ್ ವರೇಣ್ಯಂ' ಋಗ್ವೇದಕ್ಕೆ ಸಂಬಂಧಪಟ್ಟದ್ದು, 'ಭರ್ಗೋ ದೇವಸ್ಯ ಧೀಮಹಿ' ಯಜುರ್ವೇದಕ್ಕೆ ಸಂಬಂಧಪಟ್ಟದ್ದು, 'ಧೀಯೊ ಯೊ ನಃ ಪ್ರಚೋದಯಾತ್' ಸಾಮವೇದಕ್ಕೆ ಸಂಬಂಧಪಟ್ಟದ್ದು. ಹೀಗೆ ಮೂರು ವೇದಗಳ ಸಾರ ಗಾಯತ್ರಿಯ ಮೂರುಪಾದಗಳುಳ್ಳ ಒಂದು ಮಂತ್ರದಲ್ಲಿದೆ. ಇದಕ್ಕಾಗಿ ಗಾಯತ್ರಿ ಮಂತ್ರವನ್ನು 'ವೇದಮಾತ' ಎನ್ನುತ್ತಾರೆ. ಈ ಗಾಯತ್ರಿಯಿಂದ ರಸ ತೆಗೆದಾಗ ಮೂರು ಪಾದಗಳಿಂದ ಮೂರು ಪದಗಳುಳ್ಳ ವ್ಯಾಹೃತಿ "ಭೂಃ ಭುವಃ ಸ್ವಃ"; ಈ ಮೂರು ಪದಗಳ ಸಾರ ಮೂರು ಅಕ್ಷರದ(ಅ, ಉ, ಮ) ಓಂಕಾರ-**ॐ.**

ಓಂಕಾರದಲ್ಲಿ 'ಅ'ಕಾರ ಋಗ್ವೇದಕ್ಕೆ, 'ಉ'ಕಾರ ಯಜುರ್ವೇದಕ್ಕೆ ಮತ್ತು 'ಮ'ಕಾರ ಸಾಮವೇದಕ್ಕೆ ಸಂಬಂಧಪಟ್ಟದ್ದು. ಋಗ್ವೇದ " ಅಗ್ನಿಮೀ"ಳೇ ಪುರೋಹಿತಂ ಯಜ್ಞಸ್ಯ ದೇವಂ-ಋತ್ವಿಜಂ" | ಹೋತಾ"ರಂ ರತ್ನ ಧಾತಮಂ |..." ಎಂದು 'ಅ' ಕಾರದಿಂದ ಪ್ರಾರಂಭವಾಗುತ್ತದೆ. ಮತ್ತು "....ಸಮಾನೀ ವ ಆಕೂತಿಃ ಸಮಾನಾ ಹೃದಯಾನಿ ಹಃ: | ಸಮಾನಮಸ್ತು ವೋ ಮನೋ ಯಥಾ ವಃ ಸುಸಹಾಸತಿ ॥" ಎಂದು 'ಇ'ಕಾರದಲ್ಲಿ ಕೊನೆಗೊಳ್ಳುತ್ತದೆ. ಅಲ್ಲಿಂದ ಮುಂದುವರಿದು ಯಜುರ್ವೇದ "ಇಷೇ ತ್ವೋರ್ಜೆ ತ್ವಾ ..." ಎಂದು 'ಇ'ಕಾರದಿಂದ ಪ್ರಾರಂಭವಾಗಿ "........ಸಮುದ್ರೋ ಬಂಧುಃ" ಎಂದು 'ಉ'ಕಾರದಲ್ಲಿ ಕೊನೆಗೊಳ್ಳುತ್ತದೆ. ಹೀಗೆ ಓಂಕಾರದಲ್ಲಿನ 'ಅ'ಕಾರ ಮತ್ತು 'ಉ'ಕಾರ ಋಗ್ವೇದ ಮತ್ತು ಯಜುರ್ವೇದವನ್ನು ಪೂರ್ಣವಾಗಿ ಸೂಚಿಸುವ ಸಂಕ್ಷೇಪಣಾ(abbreviation)ರೂಪ. ಇಲ್ಲಿಂದ ಮುಂದೆ ಸಾಮವೇದ. ಸಾಮವೇದ "ಅಗ್ನ ಆ ಯಾಹಿ ........." ಎಂದು 'ಅ'ಕಾರದಿಂದ ಆರಂಭವಾಗಿ "......ಬೃಸ್ಪತಿರ್ದಧಾತು" ಎಂದು 'ಉ'ಕಾರದಲ್ಲಿ ಕೊನೆಗೊಳ್ಳುತ್ತದೆ. ಆದ್ದರಿಂದ ಇಲ್ಲಿ 'ಮ' ಕಾರ ಬಂದಿಲ್ಲ. ಆದರೆ ನಮಗೆ ತಿಳಿದಂತೆ ಸಾಮವೇದ ನಾದ ರೂಪದಲ್ಲಿದೆ. ಓಂಕಾರದಲ್ಲಿ ಕೂಡಾ 'ಮ' ಎನ್ನುವುದು ನಾದರೂಪದಲ್ಲಿ ಹೊರ ಹೊಮ್ಮುವ ಅಕ್ಷರ- ಅದು ಸಂಗೀತ. ಹೀಗೆ ಓಂಕಾರ ವೇದದ ಸಂಕ್ಷೇಪಣಾರೂಪವಾದ ಬೀಜಾಕ್ಷರ. ಇದು ನಮಗೆ ವೇದವನ್ನು ಗುರುತಿಸುವ ಮಾರ್ಗದರ್ಶಿ. ಆದ್ದರಿಂದ ಇದು ಭಗವಂತನನ್ನು ಸ್ತೋತ್ರ ಮಾಡುವ ಮಂತ್ರಗಳಲ್ಲಿ ಅತ್ಯಂತ ಪ್ರಕೃಷ್ಟವಾದುದ್ದು. ಇದಕ್ಕಿಂತ ದೊಡ್ಡ ಸ್ತೋತ್ರಮಾಡುವ ಶಬ್ದ ಈ ಪ್ರಪಂಚದಲ್ಲಿಲ್ಲ.

ಒಂದು ಮಂತ್ರದ ಕೊನೆಯಲ್ಲಿ ಹೇಳುವ ಓಂಕಾರಕ್ಕೆ ವ್ಯಾಕರಣದ ಪರಿಭಾಷೆಯಲ್ಲಿ 'ಪ್ರಣವಃ' ಎನ್ನುತ್ತಾರೆ. ಆದಿಯಿಂದ ಅಂತದ ತನಕ ಸಮಸ್ತ ನಾಮ ಪ್ರತಿಪಾದ್ಯ 'ಭಗವಂತ' ಎಂದು ತೋರಿಸುವುದಕ್ಕೆ ಓಂಕಾರವನ್ನು ಆದಿ-ಅಂತದಲ್ಲಿ ಉಚ್ಚಾರ ಮಾಡುತ್ತಾರೆ. ಈ ಕಾರಣಕ್ಕಾಗಿ ಮಂತ್ರದ ಆದಿಯಲ್ಲಿ ಮತ್ತು ಅಂತದಲ್ಲಿ ಬಳಸುವ

ಓಂಕಾರವನ್ನು ಎಂದೂ ಪ್ರತ್ಯೇಕವಾಗಿ ಹೇಳಬಾರದು. ಉದಾಹರಣೆಗೆ ವಿಷ್ಣು ಸಹಸ್ರನಾಮದ ಕೊನೆಯಲ್ಲಿ "ಸರ್ವಪ್ರಹರಣಾಯುಧಃ ಓಂ ನಮಃ ಇತಿ" ಎಂದು ಹೇಳದೆ "ಸರ್ವಪ್ರಹರಣಾಯುಧೋಂ ನಮಃ ಇತಿ" ಎಂದು ಹೇಳಬೇಕು. ಆಯುಧಃ ಎನ್ನುವಲ್ಲಿನ ವಿಸರ್ಗ(ಃ)ವನ್ನು ತೆಗೆದು ಅಲ್ಲಿ 'ಓಂ' ಸೇರಿಸಿ ಅದನ್ನು ಸಮಸ್ತವಾಗಿ ಹೇಳಬೇಕು.

"ವೇದದ ಸಾರಭೂತವಾದ 'ಪ್ರಣವಃ' ನಾನು" ಎನ್ನುತ್ತಾನೆ ಕೃಷ್ಣ. ಪ್ರಣವಃ ವಿಸ್ತಾರವಾದಾಗ ವ್ಯಾಹೃತಿ, ವ್ಯಾಹೃತಿ ವಿಸ್ತಾರವಾಗಿ ಗಾಯತ್ರಿ, ಗಾಯತ್ರಿ ವಿಸ್ತಾರವಾಗಿ ಕುರುಡ ಸೂಕ್ತ, ನಂತರ ಮೂರು ವೇದಗಳು, ಅಲ್ಲಿಂದ ಸಮಸ್ತ ವೇದಗಳು. ಹೀಗೆ ಪ್ರಣವದಲ್ಲಿ, ವ್ಯಾಹೃತಿಯಲ್ಲಿ, ಪುರುಷ ಸೂಕ್ತದಲ್ಲಿ, ಸಮಸ್ತವೇದಗಳಲ್ಲಿ ಭಗವಂತ ನೆಲೆಸಿದ್ದಾನೆ.

ವೇದದ ಶಬ್ದಗಳಿಂದಲೇ ಹುಟ್ಟಿ ಬಂದ ಪ್ರಪಂಚದ ಎಲ್ಲಾ ಶಬ್ದದಲ್ಲೂ, ಎಲ್ಲಾ ಲೌಕಿಕ ನಾದದಲ್ಲೂ ತುಂಬಿದ ಭಗವಂತ, ಆಕಾಶದಲ್ಲಿ ಅನಂತ ಶಬ್ದಗಳನ್ನೂ, ಅನಂತ ನಾದಗಳನ್ನೂ ಸೃಷ್ಟಿ ಮಾಡಿದ. ನಮಗೆ ಶಬ್ದದಿಂದ ಅನಂತ ಅನುಭವವನ್ನು ಕೊಟ್ಟು, ಆ ಶಬ್ದವನ್ನು ಗ್ರಹಿಸುವ ಮತ್ತು ಗ್ರಹಿಸಿ ಪುನರುಚ್ಛರಿಸುವ ವಿಶೇಷ ಶಕ್ತಿಯನ್ನು ಕರುಣಿಸಿದ. ಜ್ಞಾನದ ಮೂಲಕ ಈ ಶಬ್ದ ನಾಮಕ ಭಗವಂತನನ್ನು ತಿಳಿಯುವ ವಿಶೇಷ ಶಕ್ತಿ ಮಾನವನಿಗೆ ಭಗವಂತನ ವಿಶೇಷ ಕೊಡುಗೆ. ಜೀವಲೋಕಕ್ಕೆ ನಾನಾ ವಿಧದ ಪೌರುಷವನ್ನು ಕೊಟ್ಟ ಭಗವಂತ, 'ಪುರುಷ' ಶಬ್ದ ವಾಚ್ಯನಾಗಿ ಮಾನವರ ಬಹುವಿಧ ಪೌರುಷದಲ್ಲಿ ತುಂಬಿದ.

ಮುಂದಿನ ಶ್ಲೋಕಕ್ಕೆ ಹೋಗುವ ಮುನ್ನ ಹಿಂದಿನ ಶ್ಲೋಕದಲ್ಲಿ ನಾವು ಸಂಕ್ಷಿಪ್ತವಾಗಿ ನೋಡಿದ 'ಓಂಕಾರದ' ಬಗ್ಗೆ ಇನ್ನೂ ಹೆಚ್ಚಿನ ವಿವರವನ್ನೊಮ್ಮೆ ನೋಡೋಣ. ಹಿಂದೆ ಹೇಳಿದಂತೆ ಸಮಸ್ತ ವೇದದಲ್ಲಿ ನಾವು ಉಪಾಸನೆ ಮಾಡುವ ಭಗವಂತನ ಎಲ್ಲಾ ಗುಣಗಳನ್ನು ಓಂಕಾರ ಹೇಳುತ್ತದೆ. ಓಂ(**ॐ**) ಎನ್ನುವುದಕ್ಕೆ ಒಂದು ಅಖಂಡ ಅರ್ಥವಿದೆ. ಓಂಕಾರ 'ಅವ' ಅಥವಾ 'ಉಯಿ' ಎನ್ನುವ ಎರಡು ಧಾತುವಿನಿಂದ ನಿಷ್ಪನ್ನವಾಯಿತು. 'ಅವತಿ ಇತಿ ಓಂ'-ಇಲ್ಲಿ 'ಅವತಿ' ಪದಕ್ಕೆ ಅನೇಕ ಅರ್ಥವಿಶೇಷಗಳಿವೆ. 'ಅವ ವ್ಯಾಪ್ತೋ' ಧಾತು; ಅವತಿ ಎಂದರೆ ಎಲ್ಲಾ ಕಡೆ ತುಂಬಿರುವ. ಆದ್ದರಿಂದ ಓಂ ಎಂದರೆ ಸರ್ವಗತ(Omnipresent). 'ಅವ' ಎಂದರೆ ಜ್ಞಾನ. 'ಅವತಿ' ಎಂದರೆ ಎಲ್ಲವನ್ನೂ ತಿಳಿದವನು; ಆದ್ದರಿಂದ ಓಂ ಎಂದರೆ ಸರ್ವಜ್ಞ(Omniscient). 'ಅವ ಸಾಮರ್ಥ್ಯೇ' ಎಂದು ಇನ್ನೊಂದು ಧಾತು; ಆದ್ದರಿಂದ ಅವತಿ ಎಂದರೆ ಸರ್ವಸಮರ್ಥ(Omnipotent). ಹೀಗೆ ದೇವರು ಸರ್ವಸಮರ್ಥ, ಸರ್ವಗತ, ಸರ್ವಜ್ಞ ಎನ್ನುವ ಪ್ರಮುಖ ಮೂರು ಮುಖವನ್ನು ಓಂಕಾರ ತಿಳಿಸುತ್ತದೆ. ಇದು ಭಗವಂತನನ್ನು ಗುರುತಿಸುವ ಮೂರು ಮೂಲಭೂತ ಗುಣಗಳು. ಜೀವ 'ಅಣು'ವಾದರೆ ಭಗವಂತ ಸರ್ವಗತ; ಜೀವ ಅಲ್ಪಜ್ಞನಾದರೆ ಭಗವಂತ ಸರ್ವಜ್ಞ; ಜೀವ ಅಲ್ಪ ಸಾಮರ್ಥ್ಯ ಉಳ್ಳವನಾದರೆ ಭಗವಂತ ಸರ್ವಸಮರ್ಥ. ಹೀಗೆ ತನ್ನಿಂದ ಭಿನ್ನವಾಗಿರುವ ಆ ಶಕ್ತಿ ಎಷ್ಟು ಭಿನ್ನ ಎನ್ನುವುದನ್ನು ಓಂಕಾರ ತಿಳಿಸುತ್ತದೆ.

'ಅವ ಪ್ರವೇಶೇ' ಎನ್ನುವ ಧಾತು- ಇಲ್ಲಿ ಅವತಿ ಎಂದರೆ 'ಪ್ರವೇಶ ಮಾಡುತ್ತಾನೆ' ಎಂದರ್ಥ. ಭಗವಂತ ಸರ್ವಗತ, ಆದ್ದರಿಂದ ಆತ ಎಲ್ಲರ ಒಳಗೂ(Indweller) ಹೊರಗೂ ಇದ್ದಾನೆ. ಇದನ್ನು ನಾರಾಯಣ ಸೂಕ್ತದಲ್ಲಿ "ಅಂತರ್ ಬಹಿಶ್ಚ ತತ್ ಸರ್ವಂ ವ್ಯಾಪ್ಯ ನಾರಾಯಣ ಸ್ಥಿತಃ" ಎಂದಿದ್ದಾರೆ. 'ಅವ ವದೇ' ಅನ್ನುವ ಇನ್ನೊಂದು ಧಾತುವಿದೆ. ಅವತಿ ಎಂದರೆ ರಕ್ಷಣೆ ಮಾಡುವವ ಎನ್ನುವುದು ಒಂದು ಅರ್ಥ, ಸಂಹಾರ ಮಾಡುವವ ಎನ್ನುವುದು ಇನ್ನೊಂದು ಅರ್ಥ. ಆದ್ದರಿಂದ ಓಂ ಎಂದರೆ ಸರ್ವರಕ್ಷಕ, ಸರ್ವಸಂಹಾರಕ ಶಕ್ತಿ. "ಭಗವಂತ ನಮ್ಮಲ್ಲಿರುವ ಅಜ್ಞಾನವನ್ನು,

ನಮ್ಮಲ್ಲಿರುವ ದುಃಖವನ್ನು, ನಮ್ಮಲ್ಲಿರುವ ದೋಷವನ್ನು ಸಂಹಾರ ಮಾಡತಕ್ಕವ- ಸರ್ವ ದೋಷ ನಾಶಕ". ಇದು ನಾವು ಓಂಕಾರದಲ್ಲಿ 'ಸಂಹಾರಕಶಕ್ತಿ' ಭಗವಂತನನ್ನು ಉಪಾಸನೆ ಮಾಡುವಾಗ ತಿಳಿದಿರಬೇಕಾದ ವಿಚಾರ.

ಸಮಷ್ಟಿಯಾಗಿ 'ಅವ' ಧಾತುವಿನಿಂದ ಹುಟ್ಟಿದ ಓಂ- ಭಗವಂತ ಸರ್ವ ಸಂಹಾರಕ, ಸರ್ವ ದೋಷನಿವಾರಕ, ಸರ್ವಾಂತರ್ಯಾಮಿ, ಸರ್ವಾಂತರ್ನಿಯಾಮಕ, ಸರ್ವಜ್ಞ, ಸರ್ವಸಮರ್ಥ, ಹೀಗೆ ನಾವು ಉಪಾಸನೆ ಮಾಡಬೇಕಾದ ಭಗವಂತನ ಮುಖ್ಯ ಗುಣಗಳೆಲ್ಲವನ್ನೂ ಹೇಳುತ್ತದೆ. ಇದರ ವಿವರವೇ ಸಮಸ್ತ ವೇದದಲ್ಲಿ ಬರುವಂತಾದ್ದು.

ಎರಡನೇ ಧಾತು 'ಊಯತೇ ಇತೀ ಓಂ'. ಜಗತ್ತು ಯಾರಲ್ಲಿ ಓತವಾಗಿದೆಯೋ ಅವನು ಓಂ. ಅಂದರೆ ಇಡೀ ಜಗತ್ತು ಯಾರಲ್ಲಿ ಆಶ್ರಿತವಾಗಿದೆಯೋ ಅವನು 'ಓಂಕಾರ' ವಾಚ್ಯ ಭಗವಂತ. ಎಲ್ಲಾ ಗುಣಗಳು ಯಾರಲ್ಲಿ ಓತವಾಗಿದೆಯೋ(ಹೆಣೆದುಕೊಂಡಿದೆಯೋ) ಅವನು ಓಂ. ಅಂದರೆ ಭಗವಂತ ಸರ್ವಾಧಾರ-ಸರ್ವಗುಣಪೂರ್ಣ.

ಓಂಕಾರವನ್ನು ಸಮಷ್ಟಿಯಾಗಿ ನೋಡಿದ ಮೇಲೆ ಅದನ್ನು ಬೇರೆ ಬೇರೆ ಅಕ್ಷರವಾಗಿ ವಿಂಗಡಿಸಿಕೊಂಡು, ಅದರಲ್ಲಿರುವ ಮೂರು ಅಕ್ಷರ(ಅ, ಉ, ಮ)ಏನನ್ನು ಹೇಳುತ್ತದೆ ಎನ್ನುವುದನ್ನು ನೋಡೋಣ. ಪ್ರಣವ ಪದದ ಒಂದೊಂದು ಅಕ್ಷರ ಓಂಕಾರದ ಒಂದೊಂದು ಅಕ್ಷರದ ವಿವರಣಾರೂಪದಲ್ಲಿದೆ. ಓಂಕಾರದ ಮೊದಲನೇ ಅಕ್ಷರ 'ಅ'. 'ಅ' ಅಂದರೆ ಅಧಿಕ, ಎಲ್ಲಕ್ಕಿಂತ ಅಧಿಕನಾದ ಭಗವಂತ 'ಅ'. ಇದನ್ನು ಪ್ರಣವದ 'ಪ್ರ' ಅಕ್ಷರ ವಿವರಿಸುತ್ತದೆ. 'ಪ್ರ' ಎಂದರೆ ಪ್ರಕೃಷ್ಟವಾದ- ಎಲ್ಲಕ್ಕಿಂತ ಪ್ರಕೃಷ್ಟವಾದ ಅನಂತ ಶಕ್ತಿ ಭಗವಂತ 'ಅ'. ಓಂಕಾರದ ಎರಡನೇ ಅಕ್ಷರ 'ಉ'. 'ಉ' ಅಂದರೆ ಉತ್ತಮವಾದ, ಜ್ಞಾನಾನಂದದಿಂದ ತುಂಬಿ ಉನ್ನತವಾದದ್ದು. ಇದನ್ನು ಪ್ರಣವದ 'ಣ' ಅಕ್ಷರ ವಿವರಿಸುತ್ತದೆ. 'ಣ' ಎಂದರೆ ಜ್ಞಾನಾನಂದದ ಆತ್ಮಬಲ. ಭಗವಂತ ಸರ್ವ ಸರ್ಮರ್ಥ- ಆದ್ದರಿಂದ ಜ್ಞಾನಾನಂದ ಸ್ವರೂಪ ಭಗವಂತ 'ಉ'. ಓಂಕಾರದ ಮೂರನೇ ಅಕ್ಷರ 'ಮ'. 'ಮ' ಎಂದರೆ ಜ್ಞಾನಸ್ವರೂಪ. ಇದನ್ನು ಪ್ರಣವದ 'ವ' ಅಕ್ಷರ ವಿವರಿಸುತ್ತದೆ. 'ವ' ಎಂದರೆ ಜ್ಞಾನ-ಅದು ಸರ್ವಜ್ಞ ಎನ್ನುವ ಅರ್ಥವನ್ನು ಕೊಡುತ್ತದೆ. ಹೀಗೆ ಓಂಕಾರದ ಒಂದು ಮುಖವನ್ನು 'ಪ್ರಣವಃ' ವಿವರಿಸುತ್ತದೆ.

ಉಪನಿಷತ್ತಿನಲ್ಲಿ ಹೇಳುವಂತೆ "ನೇತಿ ನೇತಿ ಆತ್ಮಾ ಅಗ್ರಹ್ಯಃ ನ ಹಿ ಗ್ರಹ್ಯತೆ"-ಅಂದರೆ ಭಗವಂತನನ್ನು ಮೊದಲು ತಿಳಿಯುವುದೇನೆಂದರೆ "ಭಗವಂತ ಪೂರ್ಣವಾಗಿ ತಿಳಿಯಲಿಕ್ಕಾಗುವ ವಸ್ತುವಲ್ಲ" ಎಂದು! ಅವನನ್ನು ಪೂರ್ಣವಾಗಿ ತಿಳಿಯುವುದು ಅಸಾಧ್ಯ ಎಂದು ತಿಳಿಯುವುದೇ ಮೊದಲು ನಾವು ಭಗವಂತನ ಬಗ್ಗೆ ತಿಳಿಯಬೇಕಾದ ವಿಷಯ. ಇದನ್ನು ಓಂಕಾರ ವಿವರಿಸುತ್ತದೆ. ಇಲ್ಲಿ 'ಅ' ಎಂದರೆ ಅಲ್ಲ ಅಥವಾ ಇಲ್ಲ . ಭಗವಂತ ಅಲ್ಲ, ಭಗವಂತ ಇಲ್ಲ! ಅಂದರೆ ಭಗವಂತ ಪೂರ್ಣವಾಗಿ ತಿಳಿಯಲು ಆಗುವ ಸಂಗತಿಯಲ್ಲ; ಏಕೆಂದರೆ ನಾವು ತಿಳಿದಿರುವ ವಸ್ತುವಿನಲ್ಲಿ ಏನಿದೆಯೋ ಅದು ಅವನಲ್ಲಿಲ್ಲ. ನಮಗೆ ತ್ರಿಗುಣಾತ್ಮಕ ಪ್ರಪಂಚದ ಪರಿಚಯ ಮಾತ್ರ ಇದೆ, ಆದರೆ ಭಗವಂತ ತ್ರಿಗುಣಾತೀತ. ತ್ರಿಗುಣಾತ್ಮಕವಾದ ನಮ್ಮ ಮನಸ್ಸು ತ್ರಿಗುಣಾತೀತವನ್ನು ಗ್ರಹಿಸಲಾರದು. ಭಗವಂತನಲ್ಲಿ ಯಾವ ದೋಷವೂ ಇಲ್ಲ. ಆತ ಸರ್ವಗುಣಪೂರ್ಣ. ಭಗವಂತ ನಮ್ಮ ನಿಲುವಿನಿಂದ ಅತೀತ.

ಭಗವಂತ 'ಉ'. ನಮ್ಮ ಮನಸ್ಸು ಏರಬಹುದಾದ ಎತ್ತರಕ್ಕಿಂತಲೂ ಉನ್ನತವಾಗಿರುವ ವಸ್ತು. ನಮ್ಮ ಮನಸ್ಸು ಆ ಎತ್ತರಕ್ಕೆ ಏರಲು ಸಾಧ್ಯವಿಲ್ಲ. ಆದರೂ ಆತ 'ಮ'-ಅಂದರೆ ಆತನನ್ನು ತಿಳಿಯಬಹುದು! ಅಂದರೆ ಭಗವಂತ

ಸಮುದ್ರದಂತೆ. ನಾವು ಪೂರ್ಣ ಸಮುದ್ರವನ್ನು ತಂದು ನಮ್ಮ ಮನೆಯ ಪಾತ್ರೆಯಲ್ಲಿ ತುಂಬಿಡಲು ಸಾಧ್ಯವಿಲ್ಲ. ಆದರೆ ನಮ್ಮ ಪಾತ್ರೆಯಲ್ಲಿ ಎಷ್ಟು ತುಂಬಬಹುದೋ ಅಷ್ಟು ನೀರನ್ನು ತುಂಬಿ ತರಬಹುದು. ಅದೇ ರೀತಿ ಭಗವಂತನನ್ನು ನಾವು ಪೂರ್ಣ ಗ್ರಹಿಸಲು ಅಸಾಧ್ಯ, ಆದರೆ ನಮ್ಮ ನಮ್ಮ ಸಾಮರ್ಥ್ಯಕ್ಕನುಗುಣವಾಗಿ ಆತನನ್ನು ತಿಳಿಯಬಹುದು. ಓಂಕಾರ "ಭಗವಂತನನ್ನು ಪೂರ್ಣ ತಿಳಿಯಲು ಅಸಾಧ್ಯ, ಆದರೆ ನಿಮ್ಮ ನಿಮ್ಮ ಯೋಗ್ಯತೆಗೆ ತಕ್ಕಂತೆ ಭಗವಂತನನ್ನು ತಿಳಿಯಲು ಪ್ರಯತ್ನಿಸಿ" ಎನ್ನುವ ವೇದದ ಸಂದೇಶವನ್ನು ನಮಗೆ ತಿಳಿಸುತ್ತದೆ.

ಭಗವಂತನನ್ನು ಯಾವ ರೀತಿ ಅನುಸಂಧಾನ ಮಾಡಬೇಕು ಎನ್ನುವುದನ್ನು ಓಂಕಾರ ತಿಳಿಸುತ್ತದೆ. ಭಗವಂತ 'ಅ' ಅಂದರೆ ಆತ ಅತೀತ-ಯಾವುದು ಸೃಷ್ಟಿಯ ಪೂರ್ವದಲ್ಲಿ ಇತ್ತೋ ಅದು 'ಅ'. ನಾವು ಉತ್ಪನ್ನರಾದ ನಂತರ ಇರುವ ಭಗವಂತ 'ಉ'; ಎಲ್ಲವೂ ನಾಶವಾದ ಮೇಲೆ ಇರುವ ಭಗವಂತ 'ಮ'. ತ್ರಿಕಾಲದಲ್ಲಿ ಏಕರೂಪವಾಗಿರುವ ಭಗವಂತ ಓಂ.

ಭಗವಂತ 'ಅ' ಅಂದರೆ ಭೂಃ (ಭೂಮಿ); ಆತ 'ಉ' –ಭೂಮಿಯ ಉಪರಿಯಲ್ಲಿರುವ ಅಂತರಿಕ್ಷ(ಭುವಃ); ಆತ 'ಮ' ಅಂದರೆ ಜ್ಞಾನಪ್ರದವಾದ ಸ್ವರ್ಗ(ಸ್ವಃ). ಮೂರು ಲೋಕವನ್ನು ನಿಯಮಿಸುವ ಶಕ್ತಿ ಭಗವಂತ ಓಂ.

ನಮ್ಮ ಮೂರು ಅವಸ್ಥೆಗಳಾದ 'ಅ'-ಎಚ್ಚರ, 'ಉ'-ಕನಸು; 'ಮ'-ನಿದ್ದೆಯನ್ನು ನಿಯಂತ್ರಿಸುವ ಅನಂತ ಶಕ್ತಿ ಭಗವಂತ ಓಂ.

ಹೀಗೆ ಸಮಸ್ತ ವೈದಿಕ ವಾಙ್ಮಯ ಯಾವ ಗುಣವನ್ನು ಭಗವಂತನಲ್ಲಿ ಉಪಾಸನೆ ಮಾಡಬೇಕೆಂದು ಹೇಳುತ್ತದೋ; ಸರ್ವನಾಮ ವಾಚ್ಯನಾದ ಭಗವಂತನಲ್ಲಿ ಸರ್ವನಾಮಗಳು ಯಾವ ಗುಣವನ್ನು ಹೇಳುತ್ತವೋ- ಅವೆಲ್ಲವನ್ನೂ ಸಂಗ್ರಹ ಮಾಡಿ ಭಟ್ಟಿ ಇಳಿಸಿ ಸಾರಯುಕ್ತವಾಗಿ ಹೇಳತಕ್ಕಂತಹ ಬೀಜಾಕ್ಷರ ಓಂಕಾರ. ಇದು ಭಗವಂತನ ಸ್ತೋತ್ರದಲ್ಲೇ ಅತ್ಯಂತ ಶ್ರೇಷ್ಠವಾದ ಸ್ತುತಿ. ಭಗವಂತನನ್ನಲ್ಲದೆ ಇನ್ಯಾರನ್ನೂ 'ಓಂ' ಎಂದು ಕರೆಯಲು ಅಸಾಧ್ಯ. [ಈ ಕಾರಣಕ್ಕಾಗಿ ಸಾಮಾನ್ಯವಾಗಿ 'ಓಂ' ನ್ನು ಯಾರೂ ತಮ್ಮ ಹೆಸರಾಗಿ ಬಳಸುವುದಿಲ್ಲ, ಬಳಸಬಾರದು].

ಓಂಕಾರದ ಹಿಂದಿರುವ ಎಲ್ಲಾ ಅರ್ಥಾನುಸಂಧಾನದೊಂದಿಗೆ ಜಪ ಮಾಡಿದರೆ ಅದು ಅತ್ಯಂತ ಪರಿಣಾಮಕಾರಿ. ಸಾಮಾನ್ಯವಾಗಿ ಸನ್ಯಾಸಿಗಳು ಓಂಕಾರ ಜಪವನ್ನು ಮಾಡುತ್ತಾರೆ. ಗೃಹಸ್ಥನಾದವನು ನಿರಂತರ ಓಂಕಾರ ಜಪ ಮಾಡುವುದು ಅಷ್ಟು ಸೂಕ್ತವಲ್ಲ. ಗರಿಷ್ಠ ಹತ್ತುಬಾರಿ ಮಾಡಬಹುದು. ಸಂಸಾರ ಜೀವನ ನಡೆಸುವ ಹೆಂಗಸರು ಓಂಕಾರ ಜಪ ಮಾಡದಿರುವುದು ಒಳ್ಳೆಯದು. ಏಕೆಂದರೆ ಓಂಕಾರವನ್ನು ಪೂರ್ಣ ತೊಡಗಿಸಿಕೊಂಡು, ಅರ್ಥಾನುಸಂಧಾನದಿಂದ ಜಪ ಮಾಡುವುದರಿಂದ ಅದು ಮನಸ್ಸಿನ ಮೇಲೆ ಮಹತ್ತರವಾದ ಪರಿಣಾಮವನ್ನು ಬೀರುತ್ತದೆ. ಇದು ಒಂದು ರೀತಿಯ ಧ್ಯಾನವಿದ್ದಂತೆ. ಇದರಿಂದ ಮನಸ್ಸು ಮಗ್ನವಾಗಿ, ಸಾಂಸಾರಿಕ ಜೀವನದಲ್ಲಿ ವೈರಾಗ್ಯ ಬರುವ ಅಪಾಯವಿದೆ. ಆದರೆ ಸನ್ಯಾಸಿಗೆ ಈ ರೀತಿಯ ಯಾವ ಸಮಸ್ಯೆಯೂ ಇಲ್ಲ. ಆತ ತನ್ನ ದೇಹ ತಡೆದುಕೊಳ್ಳುವಷ್ಟು(೧೨,೦೦೦) ಬಾರಿ ಓಂಕಾರ ಜಪ ಮಾಡಬಹುದು.

ಪುಣ್ಯೋ ಗಂಧಃ ಪೃಥಿವ್ಯಾಂ ಚ ತೇಜಶ್ಚಾಸ್ಮಿ ವಿಭಾವಸೌ ।

ಜೀವನಂ ಸರ್ವಭೂತೇಷು ತಪಶ್ಚಾಸ್ಮಿ ತಪಸ್ವಿಷು ॥೯॥

ಪುಣ್ಯಃ ಗಂಧಃ ಪೃಥಿವ್ಯಾಮ್ ಚ ತೇಜಃ ಚ ಅಸ್ಮಿ ವಿಭಾವಸೌ ।
ಜೀವನಮ್ ಸರ್ವ ಭೂತೇಷು ತಪಃ ಚ ಅಸ್ಮಿ ತಪಸ್ವಿಷು –ಮಣ್ಣಿನಲ್ಲಿ ನರುಗಂಪೂ ನನ್ನಿಂದ. [ಪವಿತ್ರನಾಗಿ ಮಣ್ಣಿನಲ್ಲಿದ್ದು ಗಂಧದ ಅರಿವು ನೀಡುವುದರಿಂದ 'ಪುಣ್ಯ' ಮತ್ತು 'ಗಂಧ' ನಾಮಕ]. ಬೆಂಕಿಯಲ್ಲಿ ಸುಡುವ ಶಕ್ತಿಯೂ ನನ್ನಿಂದ.[ಬೆಂಕಿಯಲ್ಲಿದ್ದು ಸುಡುವವನಾದ್ದರಿಂದ 'ತೇಜಸ್' ನಾಮಕ]. ಎಲ್ಲಾ ಜೀವಿಗಳಲ್ಲಿ ಬದುಕು ನನ್ನಿಂದ. [ಎಲ್ಲಾ ಜೀವಿಗಳಲ್ಲಿದ್ದು ಬದುಕಿಸುವುದರಿಂದ 'ಜೀವನ'ನಾಮಕ]. ತಾಪಸರಲ್ಲಿ ತಪಃಶಕ್ತಿ ನನ್ನಿಂದ. [ತಾಪಸರಲ್ಲಿದ್ದು ತಪದ ಶಕ್ತಿ ನೀಡುವುದರಿಂದ 'ತಪಸ್' ನಾಮಕ].

ಕೃಷ್ಣ ಹೇಳುತ್ತಾನೆ: "ಪುಣ್ಯೋ ಗಂಧಃ ಪೃಥಿವ್ಯಾಂ- ನೆಲದಲ್ಲಿ ಸುಗಂಧ ನನ್ನಿಂದ" ಎಂದು. ಯಾವ ಗಂಧ ನಮ್ಮ ಮೂಗಿಗೆ ಅಹ್ಲಾದವನ್ನು ಕೊಡುತ್ತದೋ ಅದು 'ಪುಣ್ಯಗಂಧ'. ಇಲ್ಲಿ ಪುಣ್ಯ ಎಂದರೆ ಪವಿತ್ರ ಅಥವಾ ಸುಂದರ ಎನ್ನುವ ಅರ್ಥವನ್ನು ಕೊಡುತ್ತದೆ. ಈ ಭೂಮಿಯಲ್ಲಿ, ಭೂಮಿಯಮೇಲೆ ಹುಟ್ಟುವ ಪ್ರತಿಯೊಂದು ವಸ್ತುವಿಗೆ ಸುಗಂಧ ಕೊಟ್ಟವನು 'ಪುಣ್ಯ' ನಾಮಕ ಭಗವಂತ. ಆತ ತನ್ನ ವಿಶೇಷ ರೂಪದಲ್ಲಿ 'ಗಂಧ' ನಾಮಕನಾಗಿ ಆ ವಸ್ತುವಿನಲ್ಲಿ ಸೇರಿಕೊಂಡಿರುವುದರಿಂದ ವಸ್ತುವಿಗೆ ಒಂದು ವಿಶೇಷ ಗುಣ ಬಂತು. ಈ ಭೂಮಿಯಲ್ಲಿ ಹುಟ್ಟುವ ಗಿಡಬಳ್ಳಿಗಳು , ವನಸ್ಪತಿಗಳು, ಅನಂತ ಬಗೆಯ ಹೂಗಳು, ಹಣ್ಣುಗಳು, ಎಲ್ಲವುದರಲ್ಲೂ ಆ ವಿವಿಧತೆ-ಕಂಪು ಆ ಭಗವಂತನಿಂದ. ಭೂಮಿಯ ಅಭಿಮಾನಿ ದೇವತೆ(ಪ್ರಥ್ವೀ ದೇವತೆ)ಯೊಳಗಿದ್ದು, ಪ್ರಥ್ವಿಯಲ್ಲಿ ಗಂಧ ಶಬ್ದ ವಾಚ್ಯನಾಗಿ ಗಂಧದಲ್ಲಿ ನೆಲೆಸಿದ್ದಾನೆ ಭಗವಂತ. ನೆಲ ಎಲ್ಲವುದಕ್ಕೂ ನೆಲೆ, ಭಗವಂತ ನೆಲದಲ್ಲಿ ನೆಲೆ ನಿಂತುದರಿಂದ ನೆಲದಲ್ಲಿ ಮೂಡಿಬರುವ ಪ್ರತಿಯೊಂದು ವಸ್ತುವೂ ಕೂಡಾ ಒಂದೊಂದು ಬಗೆಯ ವಿಶಿಷ್ಟ ಸುಗಂಧವನ್ನು ಹೊತ್ತು ತರುತ್ತದೆ. ಹೀಗೆ ಭಗವಂತ ತನ್ನ ಸೃಷ್ಟಿಯಲ್ಲಿ ಸೌಂದರ್ಯಭರಿತ ವಿಶಿಷ್ಟ ಗಂಧದ ಪ್ರಪಂಚವನ್ನೇ ನಮ್ಮ ಮೂಗಿನ ಮುಂದೆ ತೆರೆದಿಟ್ಟ.
ಹಿಮಾಲಯದ 'ಹೂಗಳ ಕಣಿವೆಯಲ್ಲಿ(Valley of Flower) ಅನಂತ ಪ್ರಕಾರದ ಹೂವಿನ ಪ್ರಪಂಚವಿದೆ. ಒಂದು ಹೂವಿನ ಪರಿಮಳ ಇನ್ನೊಂದಕ್ಕಿಂತ ಭಿನ್ನ. ಎಲ್ಲಾ ಗಿಡಗಳೂ ಕೂಡಾ ಒಂದೇ ಮಣ್ಣಿನಿಂದ ಬೆಳೆಯುವುದಾದರೂ ಕೂಡಾ, ಭಗವಂತ ಒಂದೊಂದು ಗಿಡದಲ್ಲಿ ಒಂದೊಂದು ವಿಶಿಷ್ಟಗುಣವನ್ನು(exclusive quality) ತುಂಬಿದ. ಕೆಲವು ಹೂವಿನಲ್ಲಿ ನಾವು ಗುರುತಿಸಲು ಸಾಧ್ಯವಾಗುವ ಸುವಾಸನೆ ಇರುವುದಿಲ್ಲ. ಸಾಮಾನ್ಯವಾಗಿ ಇಂತಹ ಹೂವನ್ನು ದೇವರಿಗೆ ಅರ್ಪಿಸುವುದಿಲ್ಲ. ಇದಕ್ಕೆ ಕಾರಣ ದೇವರ ಪೂಜೆಯ ಪ್ರತಿಯೊಂದು ಕ್ರಿಯೆಯೂ ಕೂಡಾ ಆನಂದಮಯವಾಗಿರಬೇಕು ಎನ್ನುವ ಅನುಸಂಧಾನ. ಪೂಜೆ ಮಾಡುವಾಗ ಆ ಹೂವಿನ ಅಹ್ಲಾದಕರ ಕಂಪು ಮೂಗಿಗೆ ಬಡಿದಾಗ ನಮಗೆ 'ಪುಣ್ಯ' ಅಥವಾ 'ಗಂಧ' ನಾಮಕ ಭಗವಂತನ ಅರಿವು ಮೂಡಬೇಕು.
ನೀರು, ಸೂರ್ಯ, ಚಂದ್ರ, ಆಕಾಶ ಹಾಗೂ ಭೂಮಿಯ ಬಗ್ಗೆ ಹೇಳಿದ ಭಗವಂತ ಮುಂದುವರಿದು ಭೂಮಿಯಲ್ಲಿ ಭಗವಂತನ ಆರಾಧನೆಗೆ ಮುಖ್ಯ ಪ್ರತಿಷ್ಠಾನವಾದ ಅಗ್ನಿ(ವಿಭಾವಸು)ಯಲ್ಲಿ ತನ್ನ ವಿಭೂತಿ ವಿಜ್ಞಾನವನ್ನು ವಿವರಿಸುತ್ತಾನೆ. ವಿಭಾವಸು ಭೂಮಿಯಲ್ಲಿ ಅಗ್ನಿಯ ಅಭಿಮಾನಿ ದೇವತೆ. ಈತ ಅಷ್ಟವಸುಗಳಲ್ಲಿ[ದ್ರೋಣ, ಪ್ರಾಣ, ಧ್ರುವ, ಅರ್ಕ, ಅಗ್ನಿ(ವಿಭಾವಸು), ದೋಷ, ವಸ್ತು, ದ್ಯುವಸು] ಐದನೇಯವ. ಈತನಿಗೆ ಅನೇಕ ನಾಮಗಳು:

ವೈಶ್ವಾನರ, ವಹ್ನಿ, ಜಾತವೇದ, ಹುತಾಶನ, ಪಾವಕ, ಅನಲ, ದಹನ ಇತ್ಯಾದಿ. ನಮಗೆ ಭೂಮಿಯಲ್ಲಿ ಅಗ್ನಿ ಎನ್ನುವುದು ಬಹಳ ಮುಖ್ಯವಾದ ಭಗವಂತನ ಪ್ರತೀಕ. ವೇದ ಪ್ರಾರಂಭವಾಗುವುದೂ ಕೂಡಾ "ಅಗ್ನಿಮೀ"ಳೇ ಪುರೋಹಿತಂ ಯಜ್ಞಸ್ಯ ದೇವಂ-ಋತ್ವಿಜಂ" ಎಂದು ಅಗ್ನಿ ನಾಮದಿಂದ. ನೆಲದಲ್ಲಿ ಭಗವಂತನನ್ನು ಪೂಜಿಸಲು ಅಗ್ನಿಗಿಂತ ಉತ್ತಮ ಪ್ರತೀಕ ಇನ್ನೊಂದಿಲ್ಲ. ಅಗ್ನಿ ಬೆಳಕಿನ ರೂಪ, ಅಗ್ನಿ ಪವಿತ್ರ. ಕೊಟ್ಟದ್ದನ್ನು ಸ್ವೀಕರಿಸುವ ಭಗವಂತನ ಏಕೈಕ ಪ್ರತೀಕ ಅಗ್ನಿ. ಇಲ್ಲಿ ಕೃಷ್ಣ ಹೇಳುತ್ತಾನೆ "ತೇಜಶ್ಚಾಸ್ಮಿ ವಿಭಾವಸೌ" ಎಂದು. ಅಂದರೆ "ಇಂತಹ ಅಗ್ನಿದೇವತೆಯೊಳಗೆ ದಾಹಕ, ಪಾಚಕ, ಪ್ರಕಾಶಕ ಶಕ್ತಿಯಾಗಿ, ತೇಜಸ್ಸಾಗಿ-ನಾನಿದ್ದೇನೆ" ಎಂದು.

ಹೊರ ಪ್ರಪಂಚದಲ್ಲಿ ಉರಿಯುವ ಬೆಂಕಿಯಲ್ಲಿ ಭಗವಂತನಿದ್ದರೆ ನಮ್ಮ ನಾಲಿಗೆಯಲ್ಲಿ ಕುಳಿತ ಅಗ್ನಿ ನಾಮಕ ಭಗವಂತ(ಅಗ್ನಿನಾರಾಯಣ) ನಮಗೆ ಮಾತು ಎನ್ನುವ ಬೆಳಕನ್ನು ಕೊಟ್ಟು ನಮ್ಮೊಳಗೆ ವಾಙ್ಮಯನಾಗಿರುವ ದೊಡ್ಡ ಬೆಳಕು. ಹಾಗೇ ವೈಶ್ವಾನರನಾಗಿ ನಮ್ಮ ಪಚನ ಕ್ರಿಯೆಯನ್ನು ನಿಯಂತ್ರಿಸುವವನೂ ಆತನೇ. [ಈ ಬಗ್ಗೆ ಹೆಚ್ಚಿನ ವಿವರವನ್ನು ಮುಂದೆ ಅಧ್ಯಾಯ ಹತ್ತರಲ್ಲಿ ಕಾಣಬಹುದು].

ಮುಂದುವರಿದು ಕೃಷ್ಣ ಹೇಳುತ್ತಾನೆ: "ವಾಯುವಿನಲ್ಲಿ ತುಂಬಿ ಪ್ರತಿಯೊಂದು ಜೀವಜಾತದ ಉಸಿರಾಗಿ, ಜೀವಕ್ಕೆ ಉಸಿರಿನ ಶಕ್ತಿ ಕೊಟ್ಟು ನಾನು ನಿಂತಿದ್ದೇನೆ" ಎಂದು. ಜೀವನಪ್ರದ ಅಭಿಮಾನಿ ದೇವತೆ "ಪ್ರಾಣದೇವರು". ನಾವು ಇತರ ಇಂದ್ರಿಯ ಕೆಲಸ ಮಾಡದೇ ಇದ್ದರೆ ಬದುಕಬಹುದು. ಆದರೆ ಪ್ರಾಣಶಕ್ತಿ(ಉಸಿರಾಟ) ಕೆಲಸ ಮಾಡದೇ ಇದ್ದರೆ ಬದುಕಲು ಸಾಧ್ಯವಿಲ್ಲ. ನಿದ್ದೆಯಲ್ಲಿ ನಮ್ಮ ಇತರ ತತ್ತ್ವಾಭಿಮಾನಿ ದೇವತೆಗಳು ನಿದ್ರಿಸಬಹುದು. ಆದರೆ ಪ್ರಾಣದೇವರು ನಿದ್ರಿಸಿದರೆ ನಾವು ಪುನಃ ಎಚ್ಚರವಾಗಲು ಸಾಧ್ಯವಿಲ್ಲ! ಭಗವಂತ ಅಹೋರಾತ್ರಿ ಜೀವನಪ್ರದನಾದ ಪ್ರಾಣನೊಳಗೆ 'ಪ್ರಾಣ'ನಾಗಿ ನಿಂತು ನಮ್ಮನ್ನು ಬದುಕಿಸುತ್ತಾನೆ.

ಪಂಚಭೂತಗಳ ಬಗ್ಗೆ ವಿವರಿಸಿದ ಕೃಷ್ಣ ಮುಂದೆ ಮಾನಸ ಪ್ರಪಂಚದ ಬಗ್ಗೆ ವಿವರಿಸುತ್ತಾನೆ. ಮನೋಮಯ ಪ್ರಪಂಚದಲ್ಲಿ ಬದುಕುವವರು ತಪಸ್ವಿಗಳು(ತಪ-ಆಲೋಚನೆ –Great thinkers).ಮನಸ್ಸಿನ ಆಳವಾದ ಚಿಂತನೆಗೆ ತಪಸ್ಸು ಎನ್ನುತ್ತಾರೆ. ಇದರ ಅಭಿಮಾನಿ ಶಿವ. ನಾವು ಮಾತನಾಡುವುದು-ನಮ್ಮ ಮನಸ್ಸಿಗೆ ಹೊಳೆಯುವ ವಿಚಾರಗಳನ್ನು. ನಮ್ಮ ಮನಸ್ಸಿಗೆ ಅಂತಹ ಅದ್ಭುತ ಆಲೋಚನಾಶಕ್ತಿ ಕೊಟ್ಟು, ಮನೋಮಯಕೋಶದಲ್ಲಿ ನಿಂತು ನಮಗೆ ಆನಂದದ ಅನುಭವವನ್ನು ಕೊಡುವವ ಆ ಭಗವಂತ. ಹೀಗೆ ಪಂಚಭೂತಗಳಲ್ಲಿ; ಅನ್ನಮಯಕೋಶದಿಂದ ಹಿಡಿದು ಆನಂದಮಯಕೋಶದ ತನಕ ಹೇಗೆ ಭಗವಂತ ವಿಭೂತಿರೂಪದಲ್ಲಿ ನಿಂತಿದ್ದಾನೆ ಎನ್ನುವ ಅದ್ಭುತ ಅಧ್ಯಾತ್ಮ ವಿಜ್ಞಾನ(divine science)ವನ್ನು ಈ ಎರಡು ಶ್ಲೋಕ(೮ ಮತ್ತು ೯)ದಲ್ಲಿ ಕೃಷ್ಣ ವಿವರಿಸಿದ.

ಕೃಷ್ಣ ಪಿಂಡಾಂಡ-ಬ್ರಹ್ಮಾಂಡದಲ್ಲಿ ನಿಂತು ಹೇಗೆ ವಿಭೂತಿಯಾಗಿ ಬೇರೆ ಬೇರೆ ವಸ್ತುವಿನಲ್ಲಿ ವಿಶಿಷ್ಟ ಶಕ್ತಿಯನ್ನು ತುಂಬುತ್ತಾನೆ ಎನ್ನುವ ಮಾತಿನ ಸಂಕ್ಷಿಪ್ತ ಉಪಾಸನೆಯನ್ನು ನೋಡಿದೆವು. ಈ ವಿಭೂತಿಯ ವಿಸ್ತಾರ ಮುಂದಿನ ಅಧ್ಯಾಯದಲ್ಲಿ ಪುನಃ ಬರುತ್ತದೆ. ಇಲ್ಲಿ ಕೃಷ್ಣ ಅದನ್ನು ಕ್ರೋಡೀಕರಣ ಮಾಡಿ ಸಮಷ್ಟಿಯಾಗಿ ವಿಭೂತಿಯ ಅನುಸಂಧಾನ ಹೇಗಿರಬೇಕು ಎಂದು ವಿವರಿಸಿದ್ದಾನೆ.

ಬೀಜಂ ಮಾಂ ಸರ್ವಭೂತಾನಾಂ ವಿದ್ಧಿ ಪಾರ್ಥ ಸನಾತನಮ್ ।
ಬುದ್ಧಿರ್ಬುದ್ಧಿಮತಾಮಸ್ಮಿ ತೇಜಸ್ತೇಜಸ್ವಿನಾಮಹಮ್ ॥೧೦॥

ಬೀಜಮ್ ಮಾಮ್ ಸರ್ವಭೂತಾನಾಮ್ ವಿದ್ಧಿ ಪಾರ್ಥ ಸನಾತನಮ್ ।
ಬುದ್ಧಿಃ ಬುದ್ಧಿಮತಾಮ್ ಅಸ್ಮಿ ತೇಜಃ ತೇಜಸ್ವಿನಾಮ್ ಅಹಮ್- ಓ ಪಾರ್ಥಾ, ಎಲ್ಲಾ ಜೀವಿಗಳ ಅಳಿವಿರದ ಬೀಜ [ಸ್ವಭಾವದ ಅಭಿವ್ಯಕ್ತಿಗೆ ಕಾರಣನಾಗಿ 'ಬೀಜ' ನಾಮಕ] ನಾನೆಂದು ತಿಳಿ. ತಿಳಿದವರ ತಿಳಿವು ನನ್ನಿಂದ. [ತಿಳಿದವರೊಳಗಿದ್ದು ತಿಳಿವು ನೀಡುವುದರಿಂದ 'ಬುದ್ಧಿ'ನಾಮಕ ]. ಪರಾಕ್ರಮಿಗಳ ಸೋಲರಿಯದ ಶಕ್ತಿ ನನ್ನಿಂದ. [ಪರಾಕ್ರಮಿಗಳೊಳಗಿದ್ದು ಸೋಲರಿಯದ ಶಕ್ತಿ ನೀಡುವುದರಿಂದ 'ತೇಜಸ್' ನಾಮಕ].

ಕೃಷ್ಣ ಹೇಳುತ್ತಾನೆ: "ಬೀಜಮ್ ಮಾಮ್ ಸರ್ವಭೂತಾನಾಮ್" ಎಂದು. ಅಂದರೆ 'ಎಲ್ಲಾ ಜೀವಗಳ ಬೀಜ' ನಾನು ಎಂದು. ಬೀಜ ಎಂದಾಗ ನಮಗೆ ಸಾಮಾನ್ಯವಾಗಿ ನೆನಪಿಗೆ ಬರುವುದು ಮರಗಿಡದ ಬೀಜ. ಈ ಬೀಜವನ್ನು ಬಿತ್ತಿದಾಗ ಅದು ಮರವಾಗಿ ಬೆಳೆಯುತ್ತದೆ. ಅಂದರೆ ಮರಕ್ಕೆ ಬೀಜ ಉಪಧಾನ ಕಾರಣ. ಹಾಗೇ ಭಗವಂತ ಕೂಡಾ ಈ ಜಗತ್ತಿಗೆ ಉಪಧಾನ ಕಾರಣವೆ? ಇದು ನಮ್ಮ ಮುಂದೆ ಬರುವ ಮೊದಲ ಪ್ರಶ್ನೆ. ಇದನ್ನು ತಿಳಿಯಬೇಕಾದರೆ ಮೊದಲು ನಾವು 'ಬೀಜ' ಅನ್ನುವ ಪದದ ಆಧ್ಯಾತ್ಮಿಕ ಅರ್ಥವಿಶೇಷವನ್ನು(**etymological meaning**) ಅರಿಯಬೇಕು. ಬೀಜ ಎನ್ನುವುದು 'ಅಂಜು' ಧಾತುವಿನಿಂದ ಬಂದಿರುವುದು. ಇಲ್ಲಿ 'ವಿ' ವಿಸರ್ಗ. ಯಾವುದು ವ್ಯಂಜನ (ವ್ಯಂಜನಾತ್) ಅದು ಅಭಿವ್ಯಂಜನ. ಅಂದರೆ ಯಾರಿಂದ ಅಭಿವ್ಯಕ್ತವಾಯಿತೋ ಅದು ಬೀಜ. ಯಾವುದು(ಮೂಲವಸ್ತು) ಇದ್ದೂ ಕಾಣಿಸುತ್ತಿರಲಿಲ್ಲವೋ ಅದಕ್ಕೆ ಕಾಣುವಂತಹ ಆಕಾರಕೊಟ್ಟವನು ಆ ಭಗವಂತ. ಅಂದರೆ ಸೂಕ್ಷ್ಮ ರೂಪದಲ್ಲಿ ತುಂಬಿದ್ದ ಈ ಅವ್ಯಕ್ತ ಪ್ರಪಂಚಕ್ಕೆ ವ್ಯಕ್ತವಾದ ರೂಪ ಕೊಟ್ಟವ. ಆದ್ದರಿಂದ ಇಡೀ ಪ್ರಪಂಚದಲ್ಲಿರುವ ಜೀವಜಾತಕ್ಕೆ ಅಭಿವ್ಯಕ್ತವನ್ನು ಕೊಟ್ಟವನು ಯಾರೋ ಅವನು ಸರ್ವಭೂತಗಳಿಗೆ ಬೀಜ. ಈ ಜಗತ್ತಿಗೆ ತಂದೆಯೂ ತಾಯಿಯೂ ಆದ ಆ ಭಗವಂತ ಬೀಜ. ಪ್ರಳಯ ಕಾಲದಲ್ಲಿ ಕಣ್ಣಿಗೆ ಕಾಣದ(ಅವ್ಯಕ್ತ), ಸೂಕ್ಷ್ಮರೂಪದಲ್ಲಿ ಇದ್ದ ಈ ಪ್ರಪಂಚಕ್ಕೆ-ವ್ಯಕ್ತವಾದ ರೂಪವನ್ನು ಕೊಟ್ಟವ 'ಸರ್ವಭೂತಾನಾಂ ಬೀಜ'.

ಜಗತ್ತಿನ ಸಮಸ್ತ ಜೀವಜಾತಕ್ಕೆ ಅಂದರೆ- ಚತುರ್ಮುಖ-ಪ್ರಾಣ-ಗರುಡ-ಶೇಷ-ರುದ್ರ-ಇಂದ್ರ-ಕಾಮ-ಸರ್ವ ದೇವತೆಗಳು, ಮಾನವರು, ವನಸ್ಪತಿಗಳು, ಇತ್ಯಾದಿ. ಹೀಗೆ ಸಮಸ್ತ ಜೀವಕೋಟಿಗೆ ದೇಹಕೊಟ್ಟು, ಆಕಾರ ಕೊಟ್ಟು, ಅಭಿವ್ಯಕ್ತಿಕೊಟ್ಟು, ಇಡೀ ಜೀವಜಾತದ ಹಿಂದೆ ತಂದೆಯಾಗಿ ನಿಂತವ ಆ ಭಗವಂತ. ಈ ಪ್ರಪಂಚದಲ್ಲಿ ಯಾವ-ಯಾವ ಜೀವಜಾತವಿದೆ, ಆ ಜೀವಜಾತದಲ್ಲಿರುವ ವಿಶೇಷ ಗುಣಧರ್ಮದ(**exclusive quality**) ಹಿಂದೆ ಕಾರಣ ಪುರುಷನಾಗಿ, ವ್ಯಕ್ತಿತ್ವ ವಿಕಸನಕ್ಕೆ (ಅಭಿವ್ಯಕ್ತಿಗೆ) ಮೂಲಕಾರಣನಾಗಿ ಆ ಭಗವಂತ ನಿಂತಿದ್ದಾನೆ.

ನಮಗಿರುವ ಬೀಜದ ಇನ್ನೊಂದು ಕಲ್ಪನೆ –ಅದು ಮರವಾಗಿ ಬೆಳೆದಾಗ ತನ್ನ ಆಕಾರವನ್ನು ಕಳೆದುಕೊಳ್ಳುತ್ತದೆ ಎನ್ನುವುದು. ಆದರೆ ಭಗವಂತ 'ಸನಾತನ'. ಇಲ್ಲಿ ಕೃಷ್ಣ ಹೇಳುತ್ತಾನೆ: "ನಾನು ನಾನಾಗಿಯೇ ಇದ್ದು ಪ್ರಪಂಚಕ್ಕೆ ಆಕಾರ ಕೊಡುತ್ತೇನೆ" ಎಂದು. ಅಂದರೆ ಭಗವಂತ ಎಂದೂ ಬದಲಾಗುವುದಿಲ್ಲ-ಆದರೆ ಪ್ರಪಂಚ ಬದಲಾಗುತ್ತದೆ. ಭಗವಂತ ಪ್ರಪಂಚಕ್ಕೆ ಬೇರೆ ಬೇರೆ ಆಕಾರದ ಅಭಿವ್ಯಕ್ತ ಕೊಡುತ್ತಾನೆ. ಹೊಸ ಶಕ್ತಿ ಕೊಡುತ್ತಾನೆ. ಇದರಿಂದ ಅದು ಬದಲಾಗುತ್ತಾ, ಹೊಸ ರೂಪ ಪಡೆಯುತ್ತಾ ಇರುತ್ತದೆ. ಇದಕ್ಕೆ ಕಾರಣಪುರುಷನಾದ ಭಗವಂತ ಮಾತ್ರ ಎಲ್ಲಾ

ಕಾಲದಲ್ಲೂ ಏಕರೂಪದಲ್ಲಿರುತ್ತಾನೆ. ಹೀಗೆ ಭಗವಂತ ಸಮಸ್ತ ಭೂತಗಳಿಗೆ(ಜಡ, ಚೇತನ, ಮುಕ್ತರು) ಬೀಜ ಮತ್ತು ಆತ ಸನಾತನ.

ಕೃಷ್ಣ ಹೇಳುತ್ತಾನೆ "ಬುದ್ಧಿರ್ಬುದ್ಧಿಮತಾಮಸ್ಮಿ ತೇಜಸ್ತೇಜಸ್ವಿನಾಮಹಮ್" ಎಂದು. ಅಂದರೆ "ಬುದ್ಧಿವಂತರ ಬುದ್ಧಿಮತ್ತೆ ಏನಿದೆ ಅದು ನನ್ನ ಕೊಡುಗೆ; ಹಾಗೇ ತೇಜಸ್ವಿಗಳಿಗೆ ತೇಜಸ್ವಿ ನಾನು". ಜ್ಞಾನಪ್ರದ ಜೀವರಲ್ಲಿ ಜ್ಞಾನಶಕ್ತಿಯನ್ನು ಭಗವಂತ ಅಭಿವ್ಯಕ್ತ ಗೊಳಿಸಿದ. ಇದರಿಂದ ಅವರು ಜ್ಞಾನಯೋಗಿಗಳಾದರು ಮತ್ತು ಸಂಸಾರದಲ್ಲಿ ಜ್ಞಾನ ಪರಂಪರೆಯನ್ನು ಬೆಳೆಸಿ ಮುಕ್ತಿಯನ್ನು ಪಡೆದರು. ಅದೇ ರೀತಿ ಕರ್ಮಪ್ರಧಾನವಾಗಿರುವ ಕರ್ಮಯೋಗಿಗಳಿಗೆ ತೇಜಸ್ಸಾಗಿ ನಿಂತು ಮುನ್ನಡೆಸಿದ ಭಗವಂತ, ಅವರಿಗೆ 'ತೇಜಸ್ಸಾಗಿ' ಮುಕ್ತಿ ಕರುಣಿಸುವವ. ಬುದ್ಧಿಃ ಮತ್ತು ತೇಜಃ ಎನ್ನುವುದು ಭಗವಂತನ ಹೆಸರು. ಜ್ಞಾನದ ಅಪಾರ ಮತ್ತು ಅನಂತ ಕಡಲಾಗಿರುವ ಭಗವಂತ 'ಬುದ್ಧಿಃ'. ದೇಹಬಲ, ಆತ್ಮಬಲ ಎಲ್ಲವೂ ಪೂರ್ಣಪ್ರಮಾಣದಲ್ಲಿರುವ ಸರ್ವಸಮರ್ಥ ಭಗವಂತ ತೇಜಃ.

ಬಲಂ ಬಲವತಾಂ ಚಾಹಂ ಕಾಮರಾಗವಿವರ್ಜಿತಮ್ ।
ಧರ್ಮಾವಿರುದ್ಧೋ ಭೂತೇಷು ಕಾಮೋಽಸ್ಮಿ ಭರತರ್ಷಭ ॥೧೧॥

ಬಲಮ್ ಬಲವತಾಂ ಚ ಅಹಮ್ ಕಾಮ ರಾಗ ವಿವರ್ಜಿತಮ್ ।
ಧರ್ಮ ಅವಿರುದ್ಧಃ ಭೂತೇಷು ಕಾಮಃ ಅಸ್ಮಿ ಭರತ ಋಷಭ -- ಬಲವಂತರ ಬಯಕೆ-ಒಲವುಗಳಿಲ್ಲದ ಬಲ ನನ್ನಿಂದ. [ಬಲವಂತರೊಳಗಿದ್ದು ಬಲ ನೀಡುವುದರಿಂದ ಮತ್ತು ಕಾಮನೆಯಿಲ್ಲದ, ಅಸ್ಥಾನದಲ್ಲಿ ಬಳಸದ ಬಲರೂಪನಾದ್ದರಿಂದ 'ಕಾಮ ವಿವರ್ಜಿತ' ಮತ್ತು 'ಬಲ' ನಾಮಕ.] ಭರತಶ್ರೇಷ್ಠ, ಜೀವಿಗಳಲ್ಲಿ ಧರ್ಮಕ್ಕೆ ಅನುಗುಣವಾದ ಬಯಕೆ ನನ್ನಿಂದ. [ಜೀವಿಗಳಲ್ಲಿದ್ದು ಧರ್ಮ ವೃದ್ಧಿಗೆ ನೆರವಾಗಿ ಎಲ್ಲರಿಂದಲೂ ಕಾಮಿತನಾದ್ದರಿಂದ 'ಧರ್ಮಾವಿರುದ್ಧ' ಮತ್ತು 'ಕಾಮ'ನಾಮಕ.]

ವಿಭೂತಿಯ ಸಮಸ್ತ ಮುಖಗಳನ್ನು ಕ್ರೋಡೀಕರಿಸಿ ಸಮಷ್ಟಿಯಾಗಿ ಹೇಳಿದ ಕೃಷ್ಣ, ಇಲ್ಲಿ ಮೂಲಭೂತವಾಗಿ ಬದುಕಿನ ಎರಡು ಮುಖವನ್ನು ವಿವರಿಸುತ್ತಾನೆ. ಚೇತನದಲ್ಲಿರುವ ಬಲವನ್ನು ಕೃಷ್ಣ ಈ ಶ್ಲೋಕದಲ್ಲಿ ಉಲ್ಲೇಖಿಸುತ್ತಾನೆ. ಬಲದಲ್ಲಿ ಅನೇಕ ವಿಧ. ಮುಂಡಕೋಪನಿಷತ್ತಿನಲ್ಲಿ ಹೇಳುವಂತೆ:

ನಾಯಮಾತ್ಮಾ ಪ್ರವಚನೇನ ಲಭ್ಯೋ ನ ಮೇಧಯಾ ನ ಬಹುನಾ ಶ್ರುತೇನ ।
ಯಮೇವೈಷ ವೃಣುತೇ ತೇನ ಲಭ್ಯಸ್ತಸ್ಯೈಷ ಆತ್ಮಾ ವಿವೃಣುತೇ ತನೂಂ ಸ್ವಾಮ್ ॥೩-೨-೩॥

ನಾಯಮಾತ್ಮಾ ಬಲಹೀನೇನ ಲಭ್ಯೋ ನ ಚ ಪ್ರಮಾದಾತ್ ತಪಸೋ ವಾಪ್ಯಲಿಙ್ಗಾತ್ ।
ಏತೈರುಪಾಯೈರ್ಯತತೇ ಯಸ್ತು ವಿದ್ವಾಂಸ್ತಸ್ಯೈಷ ಆತ್ಮಾ ವಿಶತೇ ಬ್ರಹ್ಮಧಾಮ ॥೩-೨-೪॥

“ನ ಅಯಂ ಆತ್ಮಾ ಬಲಹೀನೇನ ಲಭ್ಯಃ” ಅಂದರೆ ಭಗವಂತನನ್ನು ಪಡೆಯುವುದು ದುರ್ಬಲರಿಗೆ ಸಾಧ್ಯವಿಲ್ಲ ಎಂದರ್ಥ. ಇಲ್ಲಿ ಬಂದಿರುವ ಬಲ ದೇಹಬಲವಲ್ಲ. ಇದು ಭಗವಂತನ ಅನುಗ್ರಹದ ಬಲ. ಸ್ವರೂಪ ಯೋಗ್ಯತೆ ಮತ್ತು ಜೊತೆಗೆ ಮನೋಬಲ. ಈ ಶ್ಲೋಕದಲ್ಲಿ ಹೇಳುವಂತೆ-ಅಧ್ಯಯನದಿಂದ, ಶಾಸ್ತ್ರ ಶ್ರವಣದಿಂದ ‘ಮನೋಬಲ’ ವೃದ್ಧಿಯಾಗಬಹುದು, ಆದರೆ ಆತ್ಮಬಲವಿಲ್ಲದೆ ಭಗವಂತನನ್ನು ಕಾಣಲು ಸಾಧ್ಯವಿಲ್ಲ. ಮಹಾಭಾರತ ತಾತ್ಪರ್ಯ ನಿರ್ಣಯದಲ್ಲಿ ಹೇಳುವಂತೆ:

ಯಸ್ಯ ದೇವೇ ಪರಾ ಭಕ್ತಿರ್ಯಥಾ ದೇವೇ ತಥಾ ಗುರೌ ।
ತಸ್ಯೈತೇ ಕಥಿತಾ ಹ್ಯರ್ಥಾಃ ಪ್ರಕಾಶಂತೇ ಮಹಾತ್ಮನಃ ॥ ೧-೧೦೨॥

ಯಾರಲ್ಲಿ ಭಗವಂತನ ಭಕ್ತಿ ಮತ್ತು ಆತ್ಮಬಲವಿದೆಯೋ; ದೇವತೆಗಳಲ್ಲೂ, ಗುರುಗಳಲ್ಲೂ ತಾರತಮ್ಯಪೂರ್ವಕವಾದ ಭಕ್ತಿಯಿದೆಯೋ- ಅಂತಹ ಮಹಾತ್ಮನಿಗೆ ಮಾತ್ರವೇ ವಿಷಯಗಳ ಸ್ಫುರಣವಾಗುತ್ತದೆ. ಜ್ಞಾನದ ಬಲವಿದ್ದರೆ ಸಾಲದು, ಭಕ್ತಿಯ ಬಲಬೇಕು. ಭಗವಂತನ ಅನುಗ್ರಹಕ್ಕೆ ನಮ್ಮಲ್ಲಿ ಭಕ್ತಿಯನ್ನು ಜಾಗೃತಗೊಳಿಸುವ ಗುರು ಅನುಗ್ರಹದ ಬಲವೂ ಮುಖ್ಯ. ಹೀಗೆ ಆತ್ಮ ಯೋಗ್ಯತೆಯ ಬಲ, ಸಾಧನೆಯ ಬಲ, ಭಕ್ತಿಯ ಬಲ, ಶಾಸ್ತ್ರಾಧ್ಯಾಯನದ ಬಲ, ಗುರುಗಳ ಅನುಗ್ರಹದ ಬಲ, ಇವನ್ನೆಲ್ಲವನ್ನೂ ನಮಗೆ ಕೊಡುವವ ಆ ಭಗವಂತ. ಆತ ಅನೇಕರೂಪದಲ್ಲಿ ‘ಬಲ’ ನಾಮಕನಾಗಿ ನಿಂತು ಜೀವ ಯೋಗ್ಯತೆಗನುಗುಣವಾಗಿ ವಿಶೇಷ ಬಲವನ್ನು ಅನುಗ್ರಹಿಸುತ್ತಾನೆ.

ಸಾಮಾನ್ಯವಾಗಿ ಬಲದ ಹಿಂದೆ ಒಂದು ದೋಷವಿರುತ್ತದೆ. ಬಲ ಬಂದಾಗ ನಮಗೆ ಕೆಟ್ಟ ಕಾಮನೆ ಹುಟ್ಟುತ್ತದೆ. ಆದರೆ ಭಗವಂತ ಕಾಮ-ರಾಗ ವಿವರ್ಜಿತ ಬಲ ಸ್ವರೂಪ. ನಮಗೆ ಕಾಮವರ್ಜಿತ ಬಲ ಕಲ್ಪನಾತೀತ. ಇಲ್ಲಿ ಕೃಷ್ಣ ‘ಕಾಮನೆ’ ಬೇಡ ಎಂದು ಹೇಳುತ್ತಿಲ್ಲ. ‘ಭಗವಂತನನ್ನು ತಿಳಿಯಬೇಕು’, ‘ಭಕ್ತಿಯಿಂದ ಶಾಸ್ತ್ರಾಧ್ಯಾಯನ ಮಾಡಬೇಕು’ ಇತ್ಯಾದಿ ಕಾಮನೆಗಳು ನಮಗೆ ಅಗತ್ಯವಾಗಿ ಬೇಕು. ಯಾವ ಬಯಕೆ ನಮಗೆ ಧಾರಕ ಶಕ್ತಿಯಾಗಿ ನಿಲ್ಲುತ್ತದೋ ಅಲ್ಲಿ ‘ಕಾಮ ವಿವರ್ಜಿತನಾಗಿ’ ಭಗವಂತ ನಿಂತ. ಇಲ್ಲಿ ಕೃಷ್ಣ ಹೇಳುತ್ತಾನೆ “ಸಮಸ್ತ ಜೀವಜಾತದಲ್ಲಿ ಧರ್ಮಕ್ಕೆ ಅವಿರುದ್ಧವಾಗಿರುವ ಕಾಮನೆಯ ಹಿಂದೆ ನಾನಿದ್ದೇನೆ” ಎಂದು.

ಈ ಶ್ಲೋಕದಲ್ಲಿ ಕೃಷ್ಣ ಅರ್ಜುನನನ್ನು ‘ಭರತರ್ಷಭ’ ಎಂದು ಸಂಬೋಧಿಸುತ್ತಾನೆ. ಜ್ಞಾನಾನಂದದಲ್ಲಿ ರಥನಾದವ ‘ಭರತರ್ಷಭ’; ಭರತ(ವಾಯು) ಋಷಭ(ಅಣ್ಣ)ನಾಗಿ ಉಳ್ಳವ ಭರತರ್ಷಭ.

ಈ ಮೇಲಿನ ಶ್ಲೋಕದಲ್ಲಿ ಕೇವಲ ಒಳ್ಳೆಯ ಅಂಶದಲ್ಲಿ ಇರತಕ್ಕಂತಹ ತನ್ನ ವಿಭೂತಿಯನ್ನು ಕೃಷ್ಣ ವಿವರಿಸಿದ. ಈ ಅನುಸಂಧಾನದಲ್ಲಿ ಗೀತೆಯನ್ನು ನೋಡಿದಾಗ, ಇಲ್ಲಿ ಕೆಲವರಿಗೆ ಒಂದು ಸಂಶಯ ಬರಬಹುದು. “ಒಳ್ಳೆಯದನ್ನು ಮಾಡಿಸುವವನು ದೇವರು, ಕೆಟ್ಟದ್ದನ್ನು ಮಾಡಿಸುವುದು ಯಾವುದೋ ದುಷ್ಟಶಕ್ತಿ” ಎಂದು. ಅಂದರೆ ಎಲ್ಲವನ್ನೂ ಭಗವಂತ ಮಾಡಿಸುವುದಲ್ಲ ಎನ್ನುವ ಸಂಶಯ ನಮ್ಮನ್ನು ಕಾಡಬಹುದು. ಈ ನಮ್ಮ ಸಂಶಯಕ್ಕೆ ಕೃಷ್ಣನ ಉತ್ತರ ಮುಂದಿನ ಶ್ಲೋಕ.

ಯೇ ಚೈವ ಸಾತ್ತ್ವಿಕಾ ಭಾವಾ ರಾಜಸಾಸ್ತಾಮಸಾಶ್ಚ ಯೇ।
ಮತ್ತ ಏವೇತಿ ತಾನ್ ವಿದ್ಧಿ ನ ತ್ವಹಂ ತೇಷು ತೇ ಮಯಿ ॥೧೨॥

ಯೇ ಚ ಏವ ಸಾತ್ತ್ವಿಕಾಃ ಭಾವಾ ರಾಜಸಾಃ ತಾಮಸಾಃ ಚ ಯೇ।

ಮತ್ತಃ ಏವ ಇತಿ ತಾನ್ ವಿದ್ಧಿ ನ ತು ಅಹಮ್ ತೇಷು ತೇ ಮಯಿ-ಯಾವ ವಸ್ತುಗಳು ಸತ್ತ್ವಗುಣದ ಪ್ರಭಾವಕ್ಕೆ ಒಳಗಾಗಿವೆ, ಮತ್ತು ಯಾವವು ರಜೋಗುಣ ಮತ್ತು ತಮೋಗುಣದ ಪ್ರಭಾವಕ್ಕೆ-ಅವೆಲ್ಲವೂ ನನ್ನಿಂದಾಗಿಯೇ ಆಗಿವೆ ಎಂದು ತಿಳಿ. ನಾನು ಅವುಗಳ ಹಂಗಿನಲ್ಲಿಲ್ಲ. ಅವು ನನ್ನ ಹಂಗಿನಲ್ಲಿವೆ.

ಈ ಪ್ರಪಂಚ ಎಂದರೆ ಅಂತರಂಗ ಮತ್ತು ಬಹಿರಂಗ. ಅಂತರಂಗ ಪ್ರಪಂಚದಲ್ಲಿ ತ್ರೈಗುಣ್ಯದ ಭಾವನೆಗಳು, ಬಾಹ್ಯ ಪ್ರಪಂಚದಲ್ಲಿ ತ್ರೈಗುಣ್ಯ ಪದಾರ್ಥಗಳು. ಸತ್ವ, ರಜಸ್ಸು ಮತ್ತು ತಮಸ್ಸು ಈ ಮೂರರ ಸಮಾವೇಶವೇ ಈ ಪ್ರಪಂಚ. ಮಣ್ಣು ತಮೋಗುಣದ, ನೀರು ರಜೋಗುಣದ ಮತ್ತು ಬೆಂಕಿ ಸತ್ವ ಗುಣದ ಸಂಕೇತ. ಆದ್ದರಿಂದ ಈ ಪ್ರಪಂಚದಲ್ಲಿ ನಮಗೆ ಕಾಣುವ ಪ್ರತಿಯೊಂದು ವಸ್ತುವೂ ಕೂಡಾ ಈ ಮೂರರ ಸಮಾವೇಶ. ನಮ್ಮ ಅಂತರಂಗದ ಭಾವನೆಗಳೂ ಕೂಡಾ ಈ ಮೂರು ಗುಣದ ಸಮಾವೇಶ. ನಮ್ಮಲ್ಲಿರುವ ವರ್ಣ ಪದ್ಧತಿ ಕೂಡಾ ತ್ರೈಗುಣ್ಯ ಆಧಾರಿತ. ಎಲ್ಲರಲ್ಲಿಯೂ ಕೂಡಾ ಈ ಮೂರು ಗುಣಗಳಿವೆ. ಆದರೆ ಸತ್ವದ ಅಂಶ ಹೆಚ್ಚಾಗಿದ್ದು, ರಜಸ್ಸು ಮತ್ತು ತಮಸ್ಸು ಕಡಿಮೆ ಇರುವವ ಬ್ರಾಹ್ಮಣ ವರ್ಣ; ರಜಸ್ಸಿನ ಅಂಶ ಹೆಚ್ಚಾಗಿದ್ದು ಅದರ ನಂತರ ಸತ್ವ ಮತ್ತು ತಮಸ್ಸು ಇರುವವ ಕ್ಷತ್ರಿಯ; ರಜಸ್ಸು ಹೆಚ್ಚಾಗಿದ್ದು ಅದರ ನಂತರ ತಮಸ್ಸು ಮತ್ತು ಸತ್ವ ಗುಣ ಉಳ್ಳವ ವೈಶ್ಯ; ತಮೋಗುಣ ಹೆಚ್ಚಾಗಿದ್ದು, ಅದರ ನಂತರ ರಜಸ್ಸು ಮತ್ತು ಸತ್ವ ಗುಣ ಉಳ್ಳವ ಶೂದ್ರ. ಈ ಎಲ್ಲಾ ವರ್ಣದವರೂ ಮೋಕ್ಷ ಯೋಗ್ಯರೆ. ಸೃಷ್ಟಿಯ ಆದಿಯಲ್ಲಿ ಈ ಮೂರು ಗುಣಗಳ ಮಿಶ್ರಣವಾಗಿಯೇ ಸೃಷ್ಟಿ ಪ್ರಾರಂಭವಾಯಿತು. ಇಲ್ಲಿ ಶುದ್ಧ ಸತ್ವ ಅನ್ನುವುದೊಂದಿಲ್ಲ. (ಗಣಿತಬದ್ಧವಾಗಿ ಹೇಗೆ ತ್ರೈಗುಣ್ಯದಿಂದ ಈ ಪ್ರಪಂಚ ನಿರ್ಮಾಣವಾಯಿತು ಎನ್ನುವುದನ್ನು ಮಧ್ವಾಚಾರ್ಯರು ತಮ್ಮ ಭಾಗವತ ತಾತ್ಪರ್ಯನಿರ್ಣಯ ಗ್ರಂಥದಲ್ಲಿ ಸ್ಪಷ್ಟವಾಗಿ ವಿವರಿಸಿದ್ದಾರೆ. ಇದೊಂದು ಸೃಷ್ಟಿಯ ಪ್ರಮೇಯ).

ಹೀಗೆ ಪ್ರತಿಯೊಂದು ಪದಾರ್ಥದಲ್ಲಿ ಮೂರು ಅಂಶಗಳಿವೆ ಮತ್ತು ನಮ್ಮ ಭಾವದಲ್ಲಿಯೂ ಮೂರು ಅಂಶಗಳಿವೆ. ಈ ಮೂರು ಗುಣಗಳ ಸಂಕೀರ್ಣ ಪ್ರಪಂಚ ಬಹಳ ವಿಚಿತ್ರ. ಇವು ಯಾವುದು ಒಳ್ಳೆಯದು, ಯಾವುದು ಕೆಟ್ಟದ್ದು ಎಂದು ಮನುಷ್ಯ ತೀರ್ಮಾನ ಮಾಡಲಾಗದಷ್ಟು ಗೊಂದಲಗೆಡಿಸುತ್ತವೆ. ಆದರೆ ಇಲ್ಲಿ ಕೃಷ್ಣ ಹೇಳುತ್ತಾನೆ "ತ್ರೈಗುಣ್ಯ ವರ್ಜಿತನಾಗಿ ಈ ಮೂರು ಗುಣಗಳನ್ನು ಕೊಡುತ್ತಿರುವವನು ನಾನು" ಎಂದು! ಪ್ರತಿಯೊಂದು ಜೀವದ ಜೀವ ಸ್ವಭಾವಕ್ಕನುಗುಣವಾಗಿ, ಅದಕ್ಕೆ ಬೇಕಾದ ಗುಣ ಪ್ರವೃತ್ತಿಯನ್ನು ಕೊಡುವವ ಆ ಭಗವಂತ. ಯಾರಲ್ಲೂ ಯಾವ ಕ್ರಿಯೆಯೂ ಭಗವಂತನ ಪ್ರೇರಣೆ ಇಲ್ಲದೇ ಆಗುವುದಿಲ್ಲ. ಹಿಂದೆ ವಿವರಿಸಿದಂತೆ ಜೀವನಿಗೆ ಸ್ವತಂತ್ರ ಇಚ್ಛಾಪೂರ್ವಕ ಕ್ರಿಯೆ ಇಲ್ಲ. "ನಹಿ ಪ್ರತಿಬಿಂಬಸ್ಯ ಕ್ರಿಯಾ । ಸ ಹಿ ಬಿಂಬ ಕ್ರಿಯೈವ ಕ್ರಿಯಾವಾನ್ ॥". ಬಿಂಬದಲ್ಲಿ ಕ್ರಿಯೆ ಇಲ್ಲದೆ ಪ್ರತಿಬಿಂಬದಲ್ಲಿ ಕ್ರಿಯೆ ಇಲ್ಲ. ಭಗವಂತನ ಅಧೀನವಾಗಿ ಈ ಮೂರು ಗುಣಗಳು ಈ ಪ್ರಪಂಚದಲ್ಲಿ ತುಂಬಿಕೊಂಡಿವೆ. ಇದು ನಮ್ಮ ಜೀವ ಪಕ್ವವಾಗಿ ಮೋಕ್ಷವನ್ನು ಸೇರಲು ಭಗವಂತ ನಿರ್ಮಿಸಿರುವ ಪಾಠಶಾಲೆ.
ಭಗವಂತ ತ್ರೈಗುಣ್ಯ ವರ್ಜಿತ. ಆತ ತ್ರಿಗುಣದ ನಿಯಂತ್ರಣಕ್ಕೊಳಪಟ್ಟಿಲ್ಲ. ಅದಕ್ಕಾಗಿ ಭಗವಂತನನ್ನು "ತ್ರಿಗುಣಾತೀತ ವಿದಾರಕ-ಪರಿತೋ ತೇಹಿಸುಭಕ್ತಿಂ- ಕರುಣಾಪೂರ್ಣ ಪರಪ್ರದ-ಚರಿತಂ ಜ್ಞಾಪಯಮೇತೇ" ಎಂದು ಸ್ತುತಿಸುತ್ತಾರೆ. ಇಡೀ ಜಗತ್ತು ತ್ರಿಗುಣದ ನಿಯಂತ್ರಣಕ್ಕೊಳಪಟ್ಟಿದೆ ಆದರೆ ಭಗವಂತ ತ್ರಿಗುಣಾತೀತ.

ತ್ರಿಭಿರ್ಗುಣಮಯೈರ್ಭಾವೈರೇಭಿಃ ಸರ್ವಮಿದಂ ಜಗತ್ ।
ಮೋಹಿತಂ ನಾಭಿಜಾನಾತಿ ಮಾಮೇಭ್ಯಃ ಪರಮವ್ಯಯಮ್ ॥೧೩॥

ತ್ರಿಭಿಃ ಗುಣ ಮಯೈಃ ಭಾವೈಃ ಏಭಿಃ ಸರ್ವಮ್ ಇದಮ್ ಜಗತ್ ।
ಮೋಹಿತಮ್ ನ ಅಭಿಜಾನಾತಿ ಮಾಮ್ ಏಭ್ಯಃ ಪರಮ್ ಅವ್ಯಯಮ್-ತ್ರಿಗುಣಾತ್ಮಕವಾದ ಈ ಸೊತ್ತುಗಳಿಂದ ಮೋಹಗೊಂಡ ಈ ಎಲ್ಲಾ ಜೀವಜಾತ ಇವುಗಳಿಂದಾಚೆಗಿರುವ, ಅಳಿವಿರದ ನನ್ನನ್ನು ತಿಳಿಯದಾಗಿದೆ.

ಇಡೀ ಜಗತ್ತು ತ್ರಿಗುಣಗಳಿಂದ ಮೋಹಿತವಾಗಿರುವುದರಿಂದ ಮತ್ತು ಈ ಮೂರು ಗುಣಗಳು ಎಲ್ಲಾ ಕಡೆ ತುಂಬಿರುವುದರಿಂದ ನಮಗೆ ತ್ರಿಗುಣಾತೀತವಾದ ಯೋಚನೆ ಅಸಾಧ್ಯ. ಈ ಕಾರಣದಿಂದ ತ್ರಿಗುಣಾತೀತನೂ ಅವ್ಯಯನೂ ಆದ ಆ ಭಗವಂತನನ್ನು ಪೂರ್ಣವಾಗಿ ಗ್ರಹಿಸಲು ಜೀವನಿಗೆ ಸಾಧ್ಯವಿಲ್ಲ. ಭಗವಂತನನ್ನು ಅರಿಯಬೇಕಾದರೆ ನಾವು ಈ ತ್ರಿಗುಣದ ಚಕ್ರದಿಂದ ಹೊರಕ್ಕೆ ಬರಬೇಕು. ಆದರೆ ಹೊರ ಬರುವ ಮಾರ್ಗ ಎಂತು? ಉತ್ತರ ಮುಂದಿನ ಶ್ಲೋಕ.

ದೈವೀ ಹ್ಯೇಷಾ ಗುಣಮಯೀ ಮಮ ಮಾಯಾ ದುರತ್ಯಯಾ ।
ಮಾಮೇವ ಯೇ ಪ್ರಪದ್ಯಂತೇ ಮಾಯಾಮೇತಾಂ ತರಂತಿ ತೇ ॥೧೪॥

ದೈವೀ ಹಿ ಏಷಾ ಗುಣಮಯೀ ಮಮ ಮಾಯಾ ದುರತ್ಯಯಾ ।
ಮಾಮ್ ಏವ ಯೇ ಪ್ರಪದ್ಯಂತೇ ಮಾಯಾಮ್ ಏತಾಮ್ ತರಂತಿ ತೇ-ಗುಣಮಯವಾದ ನನ್ನ ಮಾಯೆ ತುಂಬಾ ಶಕ್ತಿಶಾಲಿ. ಅದನ್ನು ದಾಟುವುದು ಸುಲಭವಲ್ಲ. ಯಾರು ನನ್ನಲ್ಲಿ ಮೊರೆ ಹೋಗುತ್ತಾರೋ ಅವರು ಈ ಮಾಯೆಯನ್ನು ದಾಟುತ್ತಾರೆ.

ತ್ರಿಗುಣಾತ್ಮಕವಾದ ಈ ಮೂರು ಭಾವಗಳಲ್ಲಿ ಇನ್ನೊಂದು ಮುಖವಿದೆ. ತ್ರಿಗುಣದ ಮಾನಿನಿ(ಶ್ರೀ ಲಕ್ಷ್ಮಿ)ಯೂ ಕೂಡಾ ಮೂರು ಮುಖದವಳು. ಶ್ರೀ-ಭೂ-ದುರ್ಗ-ಇವು ತ್ರಿಗುಣವನ್ನು ನಿಯಂತ್ರಿಸುವ ಮೂರು ರೂಪಗಳು. ಈ ಗುಣಮಯೀ ತಾಯಿ ಮಾಯೆಯಾಗಿ ಜಗತ್ತಿನಲ್ಲಿ ತುಂಬಿದ್ದಾಳೆ. ಇಡೀ ಜಗತ್ತನ್ನು ನಿಯಂತ್ರಿಸಬಲ್ಲ ಮಹಾ ಶಕ್ತಿಸ್ವರೂಪ ಆ ಮಾಯೆ ಭಗವಂತನ ಅಧೀನ. ನಾವು ಭಗವಂತನನ್ನು ಕಾಣಬೇಕಾದರೆ ಈ ಮಾಯಾ ಪರದೆಯನ್ನು ಸರಿಸಿ ಕಾಣಬೇಕು. ಆದರೆ ನಮ್ಮಿಂದ ಅದು ಅಸಂಭವ. ಈ ಕಾರಣದಿಂದ ಭಗವಂತನನ್ನು ಸೇರುವ ಏಕೈಕ ಮಾರ್ಗ ಭಗವಂತನಲ್ಲಿ ಪೂರ್ಣ ಶರಣಾಗತಿ. ಆತ ಈ ಮಾಯಾ ಪರದೆಯನ್ನು ಸರಿಸಿ ದರ್ಶನ ಕೊಡಬಲ್ಲ. ಈ ಹಿಂದೆ ಹೇಳಿದಂತೆ ಸಂಸಾರದ ಮೋಹಪಾಶದಿಂದ ದೂರ ಸರಿದು ನಾರಾಯಣನಲ್ಲಿ ಶರಣಾದಲ್ಲಿ ಆತ ನಮ್ಮನ್ನು ಈ ಮಾಯಾ ಪರದೆಯಿಂದ ದಾಟಿಸುತ್ತಾನೆ.

ಭಗವಂತನಲ್ಲದೆ ನನಗೆ ಬೇರೆ ಅಸ್ತಿತ್ವವಿಲ್ಲ ಎನ್ನುವ ಎಚ್ಚರದಿಂದ ನಾವು ನಮ್ಮನ್ನು ಆತನಿಗೆ ಅರ್ಪಿಸಿಕೊಳ್ಳಬೇಕು. ನವವಿಧ ಭಕ್ತಿಯಲ್ಲಿ ಇದು ಶ್ರೇಷ್ಠವಾದ ಭಕ್ತಿ. ಇದನ್ನು ಆತ್ಮನಿವೇದನ ಎನ್ನುತ್ತಾರೆ. ಮೊದಲು ನಮ್ಮೊಳಗಿರುವ ಭಗವಂತನನ್ನು ಅರಿತು, ಅಹಂಕಾರ ಮಮಕಾರವನ್ನು ತೊರೆದು ನಮ್ಮನ್ನು ಸಂಪೂರ್ಣವಾಗಿ ಭಗವಂತನಲ್ಲಿ ಅರ್ಪಿಸಿಕೊಂಡಾಗ ಭಗವದ್ ಸಾಕ್ಷಾತ್ಕಾರವಾಗುತ್ತದೆ. ಇಲ್ಲಿ ಮುಖ್ಯವಾಗಿ ಬೇಕಾಗಿರುವುದು ಏಕಭಕ್ತಿ ಮತ್ತು ಏಕನಲ್ಲಿ ಶರಣಾಗತಿ. ಕೃಷ್ಣ ಹೇಳುತ್ತಾನೆ "ಯಾರು ನನಗೇ ಶರಣಾಗುತ್ತಾರೋ ಅವರು ಪಾರಾಗಿಯೇ ಆಗುತ್ತಾರೆ" ಎಂದು. ಕೃಷ್ಣನ ಈ ಮಾತನ್ನು ಕೇಳಿದಾಗ ನಮ್ಮನ್ನು ಕೆಲವು ಪ್ರಶ್ನೆಗಳು ಕಾಡಬಹುದು. "ಎಲ್ಲರೂ ಏಕೆ ಭಗವಂತನಲ್ಲಿ ಶರಣಾಗುವುದಿಲ್ಲ? ಕೆಟ್ಟತನ ಜನರಲ್ಲಿ ಹೇಗೆ ಬರುತ್ತದೆ?" ಇತ್ಯಾದಿ. ಬನ್ನಿ ನಮ್ಮ ಪ್ರಶ್ನೆಗೆ ಉತ್ತರವನ್ನು ಮುಂದಿನ ಶ್ಲೋಕದಲ್ಲಿ ಹುಡುಕೋಣ.

ನ ಮಾಂ ದುಷ್ಕೃತಿನೋ ಮೂಢಾಃ ಪ್ರಪದ್ಯಂತೇ ನರಾಧಮಾಃ ।
ಮಾಯಯಾಽಪಹೃತಜ್ಞಾನಾ ಆಸುರಂ ಭಾವಮಾಶ್ರಿತಾಃ ॥೧೫॥

ನ ಮಾಂ ದುಷ್ಕೃತಿನಃ ಮೂಢಾಃ ಪ್ರಪದ್ಯನ್ತೇ ನರ ಅಧಮಾಃ ।
ಮಾಯಯಾ ಅಪಹೃತ ಜ್ಞಾನಾಃ ಆಸುರಮ್ ಭಾವಮ್ ಆಶ್ರಿತಾಃ – ಕೆಡು ನಡೆಯ ತಿಳಿಗೇಡಿ ಹುಲು ಮನುಜರು, ಮೈಯ ಸುಖದಲ್ಲೇ ಮೈಮರೆತು ಮಾಯೆಯಿಂದ ತಿಳಿವು ಮಂಕಾದವರು. ಇವರು ನನಗೆ ಶರಣಾಗುವುದಿಲ್ಲ.

ಕೃಷ್ಣ ಈ ಶ್ಲೋಕದಲ್ಲಿ ದುಷ್ಕೃತಿಗಳ ಬಗ್ಗೆ ಹೇಳುತ್ತಾನೆ. ಇವರಲ್ಲಿ ಎರಡು ವಿಧ. ಯಾವುದೋ ಪ್ರಾರಬ್ಧ ಕರ್ಮಕ್ಕೊಳಗಾಗಿ-ಪರಿಸರದ ಪ್ರಭಾವದಿಂದ ಪಾಪದ ದಾರಿಯಲ್ಲಿ ಸಾಗುವವರು(ಉದಾ: ಕರ್ಣ , ಅಜಾಮಿಳ) ಹಾಗೂ ಸ್ವಭಾವತಃ ಪಾತಕಿಗಳು(ಉದಾ: ದುರ್ಯೋಧನ, ಶಕುನಿ). ಕೃಷ್ಣ ಹೇಳುತ್ತಾನೆ "ನನಗೆ ಶರಣಾದವರನ್ನು ನಾನು ಮಾಯೆಯಿಂದ ಬಿಡಿಸುತ್ತೇನೆ. ಆದರೂ ಕೂಡಾ ಎಲ್ಲರೂ ನನಗೆ ಶರಣಾಗುವುದಿಲ್ಲ" ಎಂದು. ಸ್ವಭಾವತಃ ದುಷ್ಕೃತಿಗಳಾದವರು ಎಂದೂ ಭಗವಂತನನ್ನು ಒಪ್ಪಿಕೊಳ್ಳುವುದಿಲ್ಲ. ಅವರಿಗೆ ಎಷ್ಟೇ ಬುದ್ಧಿವಾದ ಹೇಳಿದರೂ ಅರ್ಥವಾಗುವುದಿಲ್ಲ. ಇಂತವರು ಮಾಯೆಯ ಬಲೆಯಲ್ಲಿ ಬಿದ್ದು ಇಂದ್ರಿಯದಲ್ಲೇ ಎಲ್ಲಾ ಸುಖವಿದೆ ಎಂದು ತಿಳಿದು ಬದುಕುತ್ತಾರೆ. ಪ್ರಭಾವದಿಂದ ಮಾಯೆಯ ಬಲೆಗೆ ಬೀಳುವ ಸಜ್ಜನರಿಗೆ ಮರಳಿ ಸರಿದಾರಿಗೆ ಬರುವ ವ್ಯವಸ್ಥೆ ಸೃಷ್ಟಿಯಲ್ಲಿದೆ. ಜೀವ ಸ್ವಭಾವವೇ ನೀಚವಾಗಿದ್ದರೆ ಅಂತವರನ್ನು ಎಂದೂ ತಿದ್ದಲು ಸಾಧ್ಯವಿಲ್ಲ. ಅವರು ಎಂದೂ ಭಗವಂತನನ್ನು ತಿಳಿಯಲು ಪ್ರಯತ್ನಿಸುವುದಿಲ್ಲ. ಇವರು ದುಷ್ಕೃತ್ಯವೇ ತಮ್ಮ ಕರ್ತವ್ಯ ಎಂದು ತಿಳಿದ ತಿಳಿಗೇಡಿಗಳೆನಿಸುತ್ತಾರೆ. ಇಂಥವರನ್ನು ಇಲ್ಲಿ ಕೃಷ್ಣ 'ನರಾಧಮಃ' ಎಂದು ಸಂಬೋಧಿಸಿದ್ದಾನೆ. ಇವರನ್ನು ಸದಾ ಮಾಯೆ ಆವರಿಸಿರುತ್ತದೆ. ಇಂತವರು ತಮಗೆ ಬುದ್ಧಿ ಇಲ್ಲ ಎಂದೂ ತಿಳಿದಿರುವುದಿಲ್ಲ! ಅವರು ಎಂದೂ ಭಗವಂತನಲ್ಲಿ ಶರಣಾಗುವುದಿಲ್ಲ ಮತ್ತು ಭಗವಂತನನ್ನು ಸೇರುವುದಿಲ್ಲ.

ಪ್ರಭಾವದಿಂದ ದುಷ್ಕೃತ್ಯಕ್ಕಿಳಿದವರ ಬುದ್ಧಿಯನ್ನು ಮಾಯೆ ಆವರಿಸಿರುತ್ತದೆ. ಕಾಲ ಪಕ್ವವಾದಾಗ ಅವರು ಪರಿಸರದ ಲೌಕಿಕ ಪ್ರಭಾವದಿಂದ ಕಳಚಿಕೊಂಡು ಮರಳಿ ಭಗವಂತನಿಗೆ ಶರಣಾಗುತ್ತಾರೆ. ಇದಕ್ಕೆ ಉತ್ತಮ ದೃಷ್ಟಾಂತ ಅಜಾಮಿಳನ ಜೀವನ ಕಥನ.

ಅಜಾಮಿಳ ಒಬ್ಬ ಬ್ರಾಹ್ಮಣ. ಸರಳ, ಮಿತಭಾಷಿ, ಸಾತ್ತ್ವಿಕ, ವಿದ್ವಾಂಸನಿದ್ದ. ಗುರು, ಅತಿಥಿ, ಹಿರಿಯರ ಸೇವೆ ಮಾಡುತ್ತಿದ್ದ. ತನ್ನ ಕೈ ಹಿಡಿದ ಹೆಂಡತಿಯನ್ನೂ ಪ್ರೀತಿಸುತ್ತಿದ್ದ. ಒಂದು ದಿನ ಆತ ಕಾಡಿನಲ್ಲಿ ಸುಂದರಿಯಾದ ಒಬ್ಬಳು ಹೆಣ್ಣನ್ನು, ಅರೆನಗ್ನ ಸ್ಥಿತಿಯಲ್ಲಿ ನೋಡಿ ಆಕರ್ಷಣೆಗೊಳಪಟ್ಟ. ತನ್ನ ಹೆಂಡತಿ ಮತ್ತು ತಂದೆ ತಾಯಿಯರನ್ನು ಮರೆತು, ತಾನು ಕಂಡ ಕಾಡಿನ ಹುಡುಗಿಯ ಸಂಗದಲ್ಲಿ, ಲೋಕವನ್ನು ಮರೆತ. ಆಕೆಯನ್ನು ಸಂತೋಷಪಡಿಸಲು ಮಾಡಬಾರದ ಕೆಲಸವನ್ನೆಲ್ಲಾ ಮಾಡಿದ. ಕುಡುಕನಾದ, ಕಳ್ಳತನ ಮಾಡಿದ, ಜೂಜಾಡಿದ. ಕಾಡಿನಲ್ಲಿ ಆಕೆಯೊಂದಿಗೆ ಸಂಸಾರ ಬೆಳೆಯಿತು, ಮಕ್ಕಳಾದವು. ಕೊನೆಯ ಮಗನ ಹೆಸರು 'ನಾರಾಯಣ'. ಒಂದಿರುಳು ಅಜಾಮಿಳನಿಗೆ ಘೋರ ರೂಪದ ಯಮದೂತರೇ ಕಣ್ಣೆದುರು ನಿಂತಂತಾಯಿತು. ಅವರ ಕೈಯಲ್ಲಿ ಯಮಪಾಶ! ಅಜಾಮಿಳನಿಗೆ ನಿಜಕ್ಕೂ ಭಯವಾಯಿತು. ತನ್ನ ಮಗ 'ನಾರಾಯಣ' ನನ್ನು ಕೂಗಿ ಕರೆದ! - ಆಗ ಮಗನ ಬದಲು ಆತನಿಗೆ ವಿಷ್ಣು ದೂತರು ಕಾಣಿಸುತ್ತಾರೆ. ಎಚ್ಚರಗೊಂಡ ಆತನಿಗೆ ತಾನು ಮಾಡಿದ ತಪ್ಪಿನ ಅರಿವಾಗುತ್ತದೆ. ಹಳಿತಪ್ಪಿ ಚಲಿಸುತ್ತಿದ್ದ ಆತನನ್ನು ಭಗವಂತ ಪುನಃ ಸರಿಯಾದ ದಾರಿಯಲ್ಲಿ ತಂದು ಉದ್ಧಾರ ಮಾಡುತ್ತಾನೆ. ನಂತರದ ದಿನಗಳಲ್ಲಿ ಆತ ಮಹಾತ್ಮನಾಗಿ ಬದುಕಿ ತನ್ನ ಸಾಧನೆಯಿಂದ ಮೋಕ್ಷವನ್ನು ಪಡೆಯುತ್ತಾನೆ.

ನಮ್ಮಲ್ಲಿ ಸಾತ್ವಿಕತೆ ಮತ್ತು ಜ್ಞಾನ ಅನೇಕ ಜನ್ಮಗಳ ಫಲದಿಂದ ಬಂದಿರುತ್ತದೆ. ಯಾವುದೋ ಕೆಟ್ಟ ಕಾರಣದಿಂದ ನಾವು ದಾರಿತಪ್ಪಿದಾಗ, ಕರುಣಾಮಯನಾದ ಭಗವಂತ ನಮ್ಮನ್ನು ಶಿಕ್ಷಿಸುವ ಬದಲು ಕ್ಷಮಿಸಿ ಉದ್ಧಾರ ಮಾಡುತ್ತಾನೆ. ಎಂತಹ ತಪ್ಪನ್ನೂ ಕೂಡಾ ಕ್ಷಮಿಸುವ ಕಾರುಣ್ಯಮೂರ್ತಿ ಆ ಭಗವಂತ. ಭಗವಂತ ನಮಗೆ ಕೊಡುವ ದುಃಖ- ತಾಯಿ ತನ್ನ ಮಗುವನ್ನು ತಿದ್ದಲು ಕೊಡುವ ಶಿಕ್ಷೆಯಂತೆ. ಆತನ ಶಿಕ್ಷೆ ಕಾರುಣ್ಯದ ರಕ್ಷೆ. ಆತ ಯಾರನ್ನೂ ದ್ವೇಷಿಸುವುದಿಲ್ಲ. ಎಲ್ಲರ ಅಪರಾಧವನ್ನೂ ಸಹಿಸುವ ಭಗವಂತ ಸಹಿಷ್ಣು.

ಭಗವಂತ ಅವರವರ ಸ್ವಭಾವಕ್ಕೆ ತಕ್ಕಂತೆ ಅವರವರ ವ್ಯಕ್ತಿತ್ವ ವಿಕಾಸಗೊಳಿಸುತ್ತಾನೆ. ಜೀವ ಸ್ವಭಾವವನ್ನು ಆತ ಎಂದೂ ಬದಲಿಸುವುದಿಲ್ಲ. ಪಾಪಿಗಳಾದವರಿಗೆ ಪಾಪದ ಫಲ, ಪುಣ್ಯವಂತರಿಗೆ ಪುಣ್ಯದ ಫಲ. ಈ ವ್ಯವಸ್ಥೆ ಎಂದೂ ಬದಲಾಗುವುದಿಲ್ಲ. ಈ ಕಾರಣದಿಂದ ಪ್ರಪಂಚದಲ್ಲಿ ನಾವು ಎಲ್ಲಾ ವಿಧದ ಜನರನ್ನು ಕಾಣುತ್ತೇವೆ. ಸಾಮಾನ್ಯವಾಗಿ ಪ್ರಪಂಚದಲ್ಲಿ ಭಗವದ್ಭಕ್ತರು ಮತ್ತು ಜ್ಞಾನಿಗಳು ಅಲ್ಪಸಂಖ್ಯಾತರು. ಯಾವ ಕಾಲದಲ್ಲೂ ಕೂಡಾ ಇವರು ಬಹು ಸಂಖ್ಯೆಯಲ್ಲಿ ಇರುವುದಿಲ್ಲ.

ಹರಿಕಥಾಮೃತಸಾರದಲ್ಲಿ ದಾಸರು ಸಾತ್ವಿಕರು, ತಾಮಸರು ಮತ್ತು ರಾಜಸರ ಬಗ್ಗೆ ಈ ರೀತಿ ಸೊಗಸಾಗಿ ಹಾಡಿದ್ದಾರೆ:

ಸತ್ವಸತ್ವರು ಸತ್ವರಾಜಸ ಸತ್ವತಾಮಸ ಮೂವರೂ-
ರಜ ಸತ್ವಾಧಿಕಾರಿಗಳು ಭಗವದ್ಭಕ್ತರೆನಿಸುವರು ।
ನಿತ್ಯಬದ್ಧರು ರಜೋರಜರುತ್ಪತ್ತಿ ಭೂಸ್ವರ್ಗದೊಳು ನರಕದಿ-
ಪ್ರಥ್ವಿಯೊಳು ಸಂಚರಿಸುತಿಪ್ಪರು ರಾಜಸ್ತಾಮಸರು॥

ತಮಸ್ಸಾತ್ತ್ವಿಕರೆನಿಸಿಕೊಂಬರು ಅಮಿತನಾಖ್ಯಾತಾಸುರರಗಣ-
ತಮೋರಾಜಸರೆನಿಸಿಕೊಂಬರು ದೈತ್ಯ ಸಮುದಾಯ ।

ತಮಸ್ತಾಮಸ ಕಲಿ ಪುರಂಧ್ರಿಯು ಅಮಿತ ದುರ್ಗುಣಪೂರ್ಣ-
ಸರ್ವಧರ್ಮರೊಳಧಮಾಧಮದುರಾತ್ಮನು ಕಲಿಯೆನಿಸಿಕೊಂಬ ||

ಮಾಯೆಯ ಪ್ರಭಾವ ನಮ್ಮ ಮೇಲೆ ಕಾಲಕ್ಕನುಗುಣವಾಗಿರುತ್ತದೆ. ಸಾತ್ವಿಕ ಯುಗದಲ್ಲಿ ಸಾತ್ವಿಕ ಸ್ವಭಾವ ಎಷ್ಟು ಬಲಿಷ್ಟ ಎಂದರೆ ಅದು ಸಾತ್ವಿಕರು ತಾಮಸ ಪ್ರಭಾವಕ್ಕೆ ಒಳಗಾಗದೇ ಶುದ್ಧವಾಗಿರುವಂತೆ ಮಾಡುತ್ತದೆ. ಆದರೆ ಕಲಿಯುಗದಲ್ಲಿ ಎಲ್ಲರೂ ಬಹಳ ಸುಲಭವಾಗಿ ತಾಮಸ ಪ್ರಭಾವಕ್ಕೊಳಗಾಗುತ್ತಾರೆ. ಒಂದು ವೇಳೆ ಅದನ್ನು ಮೀರಿ ಭಗವಂತನತ್ತ ಮನಸ್ಸು ಹರಿದರೆ ಅದು ಪರಮಶ್ರೇಷ್ಠ. ಇದಕ್ಕಾಗಿ 'ಕಲಿಯುಗದಲ್ಲಿ ಹರಿನಾಮ ನೆನೆದರೆ ಕುಲಕೋಟಿ ಉದ್ಧಾರವಾಗುವುದು' ಎನ್ನುತ್ತಾರೆ. ಕಲಿಯುಗದಲ್ಲಿ ತಾಮಸ ಪ್ರಭಾವಕ್ಕೊಳಗಾಗಿ ಮಾಡುವ ತಪ್ಪಿಗೆ ಶಿಕ್ಷೆ ಕಡಿಮೆ. ಹಾಗೇ ಪುಣ್ಯಕ್ಕೆ ಮಹಾಫಲ. ದುಷ್ಕೃತಿಗಳ ಬಗ್ಗೆ ವಿವರಿಸಿದ ಕೃಷ್ಣ, ಪುಣ್ಯವಂತ ಸಜ್ಜನರ ವಿಧವನ್ನು ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಚತುರ್ವಿಧಾ ಭಜಂತೇ ಮಾಂ ಜನಾಃ ಸುಕೃತಿನೋಽರ್ಜುನ ।
ಆರ್ತೋ ಜಿಜ್ಞಾಸುರರ್ಥಾರ್ಥೀ ಜ್ಞಾನೀ ಚ ಭರತರ್ಷಭ ॥೧೬॥

ಚತುರ್ವಿಧಾಃ ಭಜಂತೇ ಮಾಮ್ ಜನಾಃ ಸುಕೃತಿನಃ ಅರ್ಜುನ ।
ಆರ್ತಃ ಜಿಜ್ಞಾಸುಃ ಅರ್ಥ ಅರ್ಥೀ ಜ್ಞಾನೀ ಚ ಭರತ ಋಷಭ-ಓ ಭರತ ವಂಶದ ವೀರ ಅರ್ಜುನಾ, ಪುಣ್ಯವಂತರಾದ ನಾಲ್ಕು ಬಗೆಯ ಜನರು ನನ್ನಲ್ಲಿ ಭಕ್ತಿ ಇಡುತ್ತಾರೆ: ಸಂಕಟದಲ್ಲಿರುವವರು, ಸಿರಿಯನ್ನು ಬಯಸುವವರು, ತಿಳಿಯ ಬಯಸುವವರು ಮತ್ತು ತಿಳಿದವರು.

ದುಷ್ಕೃತಿಗಳ ಬಗ್ಗೆ ಮೊದಲು ವಿವರಿಸಿದ ಕೃಷ್ಣ ಈ ಶ್ಲೋಕದಲ್ಲಿ ಸುಕೃತಿಗಳ ಬಗ್ಗೆ ವಿವರಿಸುತ್ತಾನೆ. ಭಗವಂತನ ಕಡೆಗೆ ಸಾಗುವುದು ಒಂದು ಸರಳರೇಖೆಯ ದಾರಿ ಇದ್ದಂತೆ. ಅದು ಕವಲು ದಾರಿ ಅಲ್ಲ. ಈ ಸರಳರೇಖೆಯಲ್ಲಿ ಭಗವಂತನಿಗೆ ಬೆನ್ನು ಹಾಕಿ ಸಾಗುವವರು ಸ್ವಭಾವತಃ ದುಷ್ಕೃತಿಗಳು. ಭಗವಂತನಿಗೆ ಬೆನ್ನು ಹಾಕಿ ಸಾಗಿ, ನಂತರ ಅರಿವು ಮೂಡಿ ಪುನಃ ಭಗವಂತನತ್ತ ಮುಖ ಹಾಕುವವರು ದುಷ್ಕೃತಿಗಳಾಗಿದ್ದು ಸುಕೃತಿಗಳಾಗುವವರು. ಇನ್ನು ಭಗವಂತನತ್ತ ಮುಖ ಮಾಡಿ ಸಾಗುವವರು ಸ್ವಭಾವತಃ ಸುಕೃತಿಗಳು. ಇವರು ಭಗವಂತನನ್ನು ಭಜಿಸುವವರು. ಈ ಸುಕೃತಿಗಳಲ್ಲಿ ನಾಲ್ಕು ವಿಧ: (೧) ಆರ್ತಃ (೨) ಜಿಜ್ಞಾಸುಃ (೩) ಅರ್ಥ ಅರ್ಥೀ (೪) ಜ್ಞಾನಿ.
ಕೃಷ್ಣ ಹೇಳುತ್ತಾನೆ "ನನ್ನನ್ನು ನಾಲ್ಕು ವಿಧದಲ್ಲಿ ಭಜಿಸುವ ಸುಕೃತ ಜನರಿದ್ದಾರೆ" ಎಂದು. ಇಲ್ಲಿ ಭಜಿಸುವುದು ಅಥವಾ 'ಭಜನೆ' ಅಂದರೆ 'ಭಕ್ತಿಯಿಂದ ಭಗವಂತನನ್ನು ಆರಾಧಿಸುವುದು' ಎಂದರ್ಥ. ಭಜ ಸೇವಾಯಾಂ ಧಾತು. ಭಗವಂತನನ್ನು ಎಲ್ಲವುದಕ್ಕಿಂತ ಹಿರಿದಾಗಿ ಮತ್ತು ಹೆಚ್ಚಾಗಿ ಪ್ರೀತಿಸಿ, ಆ ಪ್ರೀತಿಗೆ ತಕ್ಕಂತೆ ನಡೆದುಕೊಳ್ಳುವುದು ಭಜನೆ. ಈ ರೀತಿ ಭಜಿಸುವವರಲ್ಲಿ ಮೊದಲನೆಯವರು ಆರ್ತರು.
ಮನುಷ್ಯ ಯಾವುದೋ ಒಂದು ತೊಂದರೆಗೆ ಸಿಕ್ಕಿಕೊಂಡಾಗ, ದುಃಖಕ್ಕೊಳಗಾದಾಗ, ಪರಿಹಾರ ಕೋರಿ ದೇವರಲ್ಲಿ ಪ್ರಾರ್ಥನೆ ಮಾಡುತ್ತಾನೆ. ಇದು ಆರ್ತಃ ಭಕ್ತಿ. ಈ ಭಕ್ತಿಯಲ್ಲಿ ಅತ್ಯಂತ ಕೆಳ ಮಟ್ಟದಿಂದ ಅತ್ಯಂತ ಶ್ರೇಷ್ಠ

ಮಟ್ಟವನ್ನು ಕಾಣಬಹುದು. ಕಷ್ಟ ಬಂದಾಗ ದೇವರನ್ನು ಆರ್ತನಾಗಿ ಭಜಿಸಿ, ಸುಖ ಬಂದಾಗ ಸಂಪೂರ್ಣ ಮರೆತರೆ- 'ಸಂಕಟ ಬಂದಾಗ ವೆಂಕಟರಮಣ' ಎನ್ನುವಂತೆ ಅದು ಅತ್ಯಂತ ಕೆಳಮಟ್ಟದ ಆರ್ತಭಕ್ತಿಯಾಗುತ್ತದೆ. ಆರ್ತ ಭಕ್ತಿಯಲ್ಲಿ ಅತ್ಯಂತ ಶ್ರೇಷ್ಠ ಮಟ್ಟದ ಭಕ್ತಿಗೆ ಉತ್ತಮ ದೃಷ್ಟಾಂತ ದ್ರೌಪದಿ. ಸಭೆಯಲ್ಲಿ ಆಕೆಯ ಮಾನಭಂಗ ಪ್ರಸಂಗ ಎದುರಾದಾಗ, ಆಕೆ ಕೃಷ್ಣನನ್ನು ಆರ್ತನಾದದಿಂದ ಕೂಗಿ ಭಜಿಸುತ್ತಾಳೆ.(ಇಲ್ಲಿ ದ್ರೌಪದಿ ಕೃಷ್ಣನನ್ನು ನಿರಂತರ ಭಜಿಸುತ್ತಿದ್ದಳು ಎನ್ನುವುದನ್ನು ನಾವು ಮರೆಯಬಾರದು). ಮೊಸಳೆ ತನ್ನ ಕಾಲನ್ನು ಕಚ್ಚಿ ಹಿಡಿದಾಗ ಗಜೇಂದ್ರ ಮಾಡಿದ್ದೂ ಕೂಡಾ ಆರ್ತ ಭಕ್ತಿ.

ಆರ್ತ ಭಕ್ತಿಯಲ್ಲಿ ಒಂದು ಸಮಸ್ಯೆ ಇದೆ. ಸಾಮಾನ್ಯವಾಗಿ ನಮಗೆ ಸುಖ ಬಂದಾಗ ನಾವು ಭಗವಂತನನ್ನು ಮರೆತುಬಿಡುತ್ತೇವೆ. ನಮ್ಮೆಲ್ಲಾ ಐಶ್ವರ್ಯ-ಸಂಪತ್ತು 'ನಮ್ಮ ದುಡಿಮೆಯ ಫಲ' ಅಂದುಕೊಳ್ಳುತ್ತೇವೆ. ಆಗ ನಮಗೆ ದೇವರು ನನಪಿಗೆ ಬರುವುದೇ ಇಲ್ಲ. ಆದರೆ ಒಂದು ವೇಳೆ ಏನಾದರೂ ಸಮಸ್ಯೆ ಬಂದರೆ-ಮೊದಲು ನೆನಪಿಗೆ ಬರುವುದು ದೇವರು. ಎಂದೆಂದೂ 'ದೇವರು ಸುಖವನ್ನೇಕೆ ಕೊಟ್ಟ' ಎಂದು ಯೋಚಿಸದ ನಾವು, ಕಷ್ಟ ಬಂದಾಗ 'ದೇವರು ನನಗೇಕೆ ಹೀಗೆ ಮಾಡಿದ' ಎನ್ನಲಾರಂಭಿಸುತ್ತೇವೆ! ಸಾಮಾನ್ಯವಾಗಿ ಜನರು ಸಂಕಟ ಬಂದಾಗ ಮೊದಲು ಜ್ಯೋತಿಷಿಗಳ ಬಳಿ ಹೋಗುತ್ತಾರೆ. ಜ್ಯೋತಿಷಿಗಳು ಒಂದು ಪರಿಹಾರ ಮಾರ್ಗವನ್ನು ಸೂಚಿಸುತ್ತಾರೆ. ನವಗ್ರಹ ಪೂಜೆ, ನಾಗಾರಾಧನೆ, ಗಣಪತಿ ಪೂಜೆ, ದೇವೀ ಆರಾಧನೆ ಇತ್ಯಾದಿ. ಇಲ್ಲಿ ಕೆಲವು ಶಾಸ್ತ್ರ ಜ್ಞಾನವಿಲ್ಲದ ಮತ್ತು ಅಧ್ಯಾತ್ಮದ ಅರಿವಿಲ್ಲದ ಸಾಮಾನ್ಯ ಜ್ಯೋತಿಷಿಗಳು, ಜನರಿಗೆ ಸರಿಯಾದ ಮಾರ್ಗದರ್ಶನ ಮಾಡದೇ ತಪ್ಪು ಮಾರ್ಗ ತೋರಿಸುವ ಸಾಧ್ಯತೆ ಹೆಚ್ಚು. ಕೆಲವರು "ನೀನು ವಿಷ್ಣು ಪೂಜೆ ಮಾಡಿದ್ದರಿಂದ ದೇವಿ ಕೋಪಗೊಂಡಿದ್ದಾಳೆ!!!" ಎಂಬಿತ್ಯಾದಿ ಅಸಂಬದ್ಧ ಹೇಳಿಕೆ ಕೊಟ್ಟು, ಜನರನ್ನು ದಾರಿತಪ್ಪಿಸುವ ಪ್ರಸಂಗವಿದೆ. ಹೀಗಾದಾಗ ಸಾಮಾನ್ಯ ಜನರು ಎಲ್ಲಾ ದೇವತೆಗಳನ್ನು ಬೇರೆ ಬೇರೆಯಾಗಿ ಪೂಜಿಸಿ, ಏಕಭಕ್ತಿಯಿಂದ ದೂರ ಸರಿಯುತ್ತಾರೆ. ಇದರಿಂದಾಗಿ ಭಗವಂತನನ್ನು ಪ್ರೀತಿಸುವ ಬದಲು ಭಯದಿಂದ 'ದೇವರಿಂದ ನನಗೆ ಯಾವ ತೊಂದರೆ ಆಗದಿರಲಿ' ಎನ್ನುವಂತೆ ಭಕ್ತಿ ಮಾಡುವ ಸಾಧ್ಯತೆ ಇದೆ! ಈ ಎಲ್ಲಾ ಕಾರಣದಿಂದ ನಿರಂತರಭಕ್ತಿ ಮತ್ತು ಏಕಭಕ್ತಿ ಆರ್ತಭಕ್ತರಲ್ಲಿ ಇಲ್ಲದೇ ಇರುವ ಸಾಧ್ಯತೆ ಹೆಚ್ಚು.

ಆರ್ತರು ಕಷ್ಟವನ್ನು ನೀಗುವಂತೆ ಭಗವಂತನಲ್ಲಿ ಭಕ್ತಿ ಮಾಡಿದರೆ, ಜಿಜ್ಞಾಸುಗಳು ಜ್ಞಾನಕ್ಕಾಗಿ ಭಗವಂತನಲ್ಲಿ ಭಕ್ತಿ ಮಾಡುತ್ತಾರೆ. ಅದೇ ರೀತಿ ಅರ್ಥಾರ್ಥಿಗಳು ಐಹಿಕ ಸಂಪತ್ತಿಗಾಗಿ, ಐಶ್ವರ್ಯಕ್ಕಾಗಿ, ಏನನ್ನೋ ಪಡೆಯುವುದಕ್ಕಾಗಿ ಭಗವಂತನನ್ನು ಪೂಜಿಸುತ್ತಾರೆ.

ಈ ಮೂರು ಭಕ್ತರಿಗಿಂತ ಭಿನ್ನ ನಾಲ್ಕನೇ ವಿಧದ ಭಕ್ತ. ಆತ ಜ್ಞಾನಿ. ಆತ ಏನೋ ಬೇಕು ಅಥವಾ ಬೇಡ ಎಂದು ಭಗವಂತನನ್ನು ಪೂಜಿಸುವುದಿಲ್ಲ; ಬದಲಿಗೆ ಭಗವಂತನ ಮಹಿಮೆಯನ್ನು ಸಂಪೂರ್ಣ ತಿಳಿದ ಆತ ಸಹಜವಾಗಿ ಭಗವಂತನನ್ನು ಅನನ್ಯವಾಗಿ ಪ್ರೀತಿಸುತ್ತಿರುತ್ತಾನೆ. ಈತನಲ್ಲಿ ಏಕಭಕ್ತಿ ಮತ್ತು ನಿರಂತರ ಭಕ್ತಿ ಇರುತ್ತದೆ. ಯಾವುದೇ ಐಹಿಕ ಫಲಾಪೇಕ್ಷೆಯಿಂದ ಈತ ಭಗವಂತನನ್ನು ಭಜಿಸುವುದಿಲ್ಲ.

ಮುಂದಿನ ಶ್ಲೋಕಕ್ಕೆ ಹೋಗುವ ಮೊದಲು ಇಲ್ಲಿ ನಾವು ಏಕಭಕ್ತಿ ಅಂದರೆ ಏನು ಎನ್ನುವುದನ್ನು ಸ್ಪಷ್ಟವಾಗಿ ತಿಳಿದಿರಬೇಕು. ಏಕಭಕ್ತಿ ಎಂದರೆ ಎಲ್ಲಾ ದೇವತೆಗಳನ್ನು, ಗುರು-ಹಿರಿಯರನ್ನು ನಿರ್ಲಕ್ಷಿಸಿ ಕೇವಲ ಭಗವಂತನನ್ನು ಪೂಜಿಸುವುದಲ್ಲ. ಒಂದು ವೇಳೆ ನಾವು ಹೀಗೆ ಮಾಡಿದರೆ ಅದು ಭಗವಂತನನ್ನು ಅವಮಾನ ಮಾಡಿದಂತೆ. ಉದಾಹರಣೆಗೆ ನಮಗೆ ಯಾವುದೋ ತೊಂದರೆ ಬಂದಾಗ ಜ್ಯೋತಿಷಿಯೊಬ್ಬರು 'ನವಗ್ರಹ ಶಾಂತಿ' ಮಾಡಿಸಿ

ಪರಿಹಾರವಾಗುತ್ತದೆ ಎಂದು ಹೇಳುತ್ತಾರೆ. ಹೀಗೆ ಹೇಳಿದಾಗ ನಾವು ಅದನ್ನು ನಿರ್ಲಕ್ಷಿಸಿ ಕೇವಲ ಭಗವಂತನನ್ನು ಮಾತ್ರ ನಾನು ಭಜಿಸುತ್ತೇನೆ, ಭಗವಂತನ ಅಧೀನ ದೇವತೆಯ ಪೂಜೆಯ ಅಗತ್ಯವೇನು ಎಂದು ತಿಳಿದುಕೊಂಡರೆ ಅದು ತಪ್ಪಾಗುತ್ತದೆ. ನವಗ್ರಹಗಳ ಪರಿವಾರ ಸಹಿತನಾಗಿ ಕೂತ ಭಗವಂತನಿಗೆ ಮಾಡುವ ಪೂಜೆ 'ನವಗ್ರಹ ಪೂಜೆ'. ಇದು ಯಾವುದರಿಂದ ಸಮಸ್ಯೆ ಬಂತೋ ಅದರ ಮುಖಂಡನಾಗಿ ಕುಳಿತ ಭಗವಂತನ ಪೂಜೆ. ಭಗವಂತನ ಸಮಸ್ತ ಪರಿವಾರದ ವೈಭವನ್ನು ನೆನೆಸಿಕೊಂಡು ಯಾವುದೇ ಪೂಜೆ ಮಾಡಿದರೂ ಅದು ಶ್ರೇಷ್ಠ ಪೂಜೆ ಎನಿಸುತ್ತದೆ. ಸಮಸ್ತ ದೇವತೆಗಳ ಸಹಿತನಾದ ಭಗವಂತನ ಉಪಾಸನೆಯೇ ಏಕಭಕ್ತಿ. ಭಗವಂತ ಏಕಾಕಿ ಅಲ್ಲ. ಆತ ಅನಂತ ಪ್ರಜಾಪತಿ. ಆದ್ದರಿಂದ ಭಗವಂತನನ್ನು ಪ್ರಧಾನವಾಗಿಟ್ಟುಕೊಂಡು ಇತರ ದೇವತೆಗಳನ್ನು ಭಗವಂತನ ಪರಿವಾರವಾಗಿ ತಿಳಿದು ನಿಷ್ಠೆಯಿಂದ ಪೂಜಿಸಬೇಕು. ಇದು ದೇವರನ್ನು ಸೇರಲು ನಮಗೆ ಮಾರ್ಗದರ್ಶನ ಮಾಡುವ ದೇವತೆಗಳೂ ಇಷ್ಟಪಡುವ ಅತಿಶ್ರೇಷ್ಠ ಭಕ್ತಿ. ಒಂದು ವೇಳೆ ನಾವು ಭಗವಂತನನ್ನು ಮರೆತು ಕೇವಲ ಒಂದು ದೇವತೆಯನ್ನು ಪೂಜಿಸಿದರೆ ಆ ದೇವತೆ ನಮ್ಮ ಪೂಜೆಯನ್ನು ಸ್ವೀಕರಿಸದೇ ಇರಬಹುದು. ಪೂಜೆ ಪರಿಪೂರ್ಣವಾಗಬೇಕಾದರೆ ನಾವು ಏಕಭಕ್ತಿಯನ್ನು ಭಗವಂತನಲ್ಲಿ ತೋರಬೇಕು.

ಗುರುಭಕ್ತಿ ಕೂಡಾ ಇದೇ ರೀತಿ. ಗುರುಭಕ್ತಿಯಲ್ಲಿ ನಾವು ಕಾಣಬೇಕಾಗಿರುವುದು ಗುರುವಿನ ಅಂತರಂಗದೊಳಗಿರುವ ಭಗವಂತನನ್ನು. ಜ್ಞಾನಿ ಎಲ್ಲವುದರಲ್ಲೂ ಅದರ ಅಂತರ್ಯಾಮಿಯಾದ ಭಗವಂತನನ್ನು ಕಾಣುತ್ತಾ, ಐಹಿಕ ಫಲಾಪೇಕ್ಷೆ ಇಲ್ಲದ ಏಕಭಕ್ತಿ ಮತ್ತು ನಿರಂತರ ಭಕ್ತಿಯನ್ನು ರೂಢಿಸಿಕೊಂಡಿರುತ್ತಾನೆ.

ಷಾಂ ಜ್ಞಾನೀ ನಿತ್ಯಯುಕ್ತ ಏಕಭಕ್ತಿರ್ವಿಶಿಷ್ಯತೇ ।
ಪ್ರಿಯೋ ಹಿ ಜ್ಞಾನಿನೋಽತ್ಯರ್ಥಮಹಂ ಸ ಚ ಮಮ ಪ್ರಿಯಃ ॥೧೭॥

ತೇಷಾಮ್ ಜ್ಞಾನೀ ನಿತ್ಯಯುಕ್ತಃ ಏಕಭಕ್ತಿಃ ವಿಶಿಷ್ಯತೇ ।
ಪ್ರಿಯಃ ಹಿ ಜ್ಞಾನಿನಃ ಅತ್ಯರ್ಥಮ್ ಅಹಮ್ ಸಃ ಚ ಮಮ ಪ್ರಿಯಃ -ಅವರಲ್ಲಿ ತಿಳಿದವನು ಮಿಗಿಲಾದವನು ; ನನ್ನಲ್ಲೇ ಭಕ್ತಿಯನ್ನಿಟ್ಟು, ನನ್ನನ್ನೇ ಸದಾ ನೆನೆಯುವವನು. ತಿಳಿದವನಿಗೆ ನಾನೆಂದರೆ ತುಂಬಾ ಇಷ್ಟ, ಅವನೆಂದರೆ ನನಗೂ ತುಂಬಾ ಇಷ್ಟ.

ಮೇಲೆ ಹೇಳಿದ ನಾಲ್ಕು ರೀತಿಯ ಭಕ್ತರಲ್ಲಿ ಜ್ಞಾನಿ ಎಲ್ಲರಿಗಿಂತ ಶ್ರೇಷ್ಠ. ಆತ ಜ್ಞಾನಪೂರ್ವಕವಾಗಿ ಯಾವುದೇ ಫಲಾಪೇಕ್ಷೆ ಇಲ್ಲದೆ ಭಗವಂತನನ್ನು ತಿಳಿದು ಸಹಜವಾಗಿ ಪ್ರೀತಿಸುತ್ತಾನೆ. ಹಿಂದಿನ ಅಧ್ಯಾಯಗಳಲ್ಲಿ ನೋಡಿದಂತೆ ನಾವು ಏನನ್ನು ಮಾಡುತ್ತೇವೋ ಅದನ್ನೇ ಪಡೆಯುತ್ತೇವೆ. ಭಗವಂತನನ್ನು ಹೇಗೆ ಕಾಣುತ್ತೇವೋ ಹಾಗೇ ಭಗವಂತ ನಮ್ಮನ್ನು ಕಾಣುತ್ತಾನೆ. ಈ ಕಾರಣದಿಂದ ಜ್ಞಾನಪೂರ್ವಕವಾದ, ಫಲಾಪೇಕ್ಷೆ ಇಲ್ಲದ, ಏಕಭಕ್ತಿಯುಳ್ಳ ಜ್ಞಾನಿ ಭಗವಂತನಿಗೆ ಬಹಳ ಹತ್ತಿರದಲ್ಲಿರುತ್ತಾನೆ.

ಉದಾರಾಃ ಸರ್ವ ಏವೈತೇ ಜ್ಞಾನೀ ತ್ವಾತ್ಮೈವ ಮೇ ಮತಮ್ ।

ಆಸ್ಥಿತಃ ಸ ಹಿ ಯುಕ್ತಾತ್ಮಾ ಮಾಮೇವಾನುತ್ತಮಾಂ ಗತಿಮ್ ॥೧೮॥

ಉದಾರಾಃ ಸರ್ವೇ ಏವ ಏತೇ ಜ್ಞಾನೀ ತು ಆತ್ಮಾ ಏವ ಮೇ ಮತಮ್ ।
ಆಸ್ಥಿತಃ ಸಃ ಹಿ ಯುಕ್ತಾತ್ಮಾ ಮಾಮ್ ಏವ ಅನುತ್ತಮಾಂ ಗತಿಮ್ –ಇವರೆಲ್ಲರೂ ದೊಡ್ಡವರೇ. ತಿಳಿದವನಂತೂ-ತೀರಾ ನನ್ನವನು ಎಂದು ನನ್ನ ತೀರ್ಮಾನ. ಏಕೆಂದರೆ ಅವನು ಹಿರಿಯ ನೆಲೆಯಾದ ನನ್ನಲ್ಲೇ ಬಗೆ ನೆಟ್ಟು ನನ್ನಲ್ಲೇ ನೆಲೆಗೊಂಡವನು.

ಕೃಷ್ಣ ಹೇಳುತ್ತಾನೆ "ಭಕ್ತಿ ಮಾರ್ಗದಲ್ಲಿ ನಡೆಯುವ ಈ ಎಲ್ಲಾ ರೀತಿಯ ಸುಕೃತಿಗಳೂ ಉತ್ತಮರೇ ; ಆದರೆ ಜ್ಞಾನಿ ಮಾತ್ರ ನನಗೆ ತುಂಬಾ ಹತ್ತಿರದವನು ಮತ್ತು ಆತ್ಮೀಯ" ಎಂದು. ಏಕೆಂದರೆ ನಮಗೆ ತಿಳಿದಂತೆ ಜ್ಞಾನವಿಲ್ಲದ ಭಕ್ತಿ ಪೂರ್ಣಭಕ್ತಿ ಆಗುವುದಿಲ್ಲ. ಜ್ಞಾನಪೂರ್ವಕವಾಗಿ ಭಕ್ತಿ ಮಾಡುವವ ನೇರವಾಗಿ ಭಗವಂತನನ್ನು ಹೋಗಿ ಸೇರುತ್ತಾನೆ. ಆದ್ದರಿಂದ ಅದು ಶ್ರೇಷ್ಠವಾದ ಭಕ್ತಿ.
ಜ್ಞಾನಿಗಳು ಆರ್ತರಾಗಿರಬಹುದು, ಜಿಜ್ಞಾಸುಗಳಾಗಿರಬಹುದು ಅಥವಾ ಅರ್ಥಾರ್ಥಿಗಳಾಗಿರಬಹುದು (ಉದಾಹರಣೆಗೆ ಅರ್ಜುನ). ಆದರೆ ಎಲ್ಲಾ ಆರ್ತರು, ಜಿಜ್ಞಾಸುಗಳು ಮತ್ತು ಅರ್ಥಾರ್ಥಿಗಳು ಜ್ಞಾನಿಗಳಾಗಿರಬೇಕೆಂದೇನಿಲ್ಲ. ಜ್ಞಾನಿಗೆ ಸದೃಶವಾದ ಭಕ್ತಿ ಇನ್ನೊಂದಿಲ್ಲ. ಜ್ಞಾನಿಯ ಮನಸ್ಸು ಸದಾ ಭಗವಂತನಲ್ಲಿ ನೆಟ್ಟಿರುತ್ತದೆ. ಭಕ್ತಿಯ ಮಾರ್ಗದಲ್ಲಿ ಸಾಗುವ ಎಲ್ಲರೂ ದೊಡ್ಡವರಾದರೂ ಕೂಡಾ, ಜ್ಞಾನಿ ಮಾತ್ರ ಭಗವಂತನಿಗೆ ಅತೀ ಆತ್ಮೀಯ.
ಮೇಲೆ ಹೇಳಿದಂತೆ ಜ್ಞಾನಿ ಅರ್ಥಾರ್ಥಿಯಾಗಿರಬಹುದು. ಈ ವಿಚಾರ ನಿಮಗೆ ಸ್ವಲ್ಪ ಗೊಂದಲವೆನಿಸಬಹುದು. ಪ್ರಹ್ಲಾದನ ಜೀವನದ ಒಂದು ಘಟನೆಯನ್ನು ನೋಡಿದರೆ ಈ ವಿಚಾರ ನಮಗೆ ಅರ್ಥವಾಗುತ್ತದೆ. ಪ್ರಹ್ಲಾದನ ಕಥೆ ನಮಗೆಲ್ಲರಿಗೂ ತಿಳಿದಿದೆ. ಆತ ಮಹಾನ್ ಜ್ಞಾನಿ. ಇಂತಹ ಪ್ರಹ್ಲಾದ ತನ್ನ ತಂದೆ ಹಿರಣ್ಯಾಕ್ಷನನ್ನು ಕೊಂದ ನರಸಿಂಹ ರೂಪಿ ಭಗವಂತನಲ್ಲಿ ಒಂದು ಪ್ರಾರ್ಥನೆ ಮಾಡುತ್ತಾನೆ. "ನನ್ನ ತಂದೆ ತಿಳುವಳಿಕೆ ಇಲ್ಲದೆ, ನಿನ್ನ ಮಹತ್ವ ಗೊತ್ತಿಲ್ಲದೇ, ನಿನ್ನನ್ನು ನಿಂದೆ ಮಾಡಿದ. ಆ ದೋಷಕ್ಕೆ ಎಂದೂ ಪರಿಹಾರ ಇಲ್ಲ ಎನ್ನುವುದು ನನಗೆ ತಿಳಿದಿದೆ. ಆದರೂ ಅಜ್ಞಾನದಿಂದ ಆತ ಮಾಡಿದ ತಪ್ಪನ್ನು ಕ್ಷಮಿಸು" ಎಂದು. ಇಲ್ಲಿ ಯಾವುದೇ ಸ್ವಾರ್ಥ ನಮಗೆ ಕಾಣುವುದಿಲ್ಲ. ಆದ್ದರಿಂದ ಇದು ಜ್ಞಾನಿ ಅರ್ಥಾರ್ಥಿ ಹೇಗೆ ಆಗುತ್ತಾನೆ ಎನ್ನುವುದಕ್ಕೆ ಉತ್ತಮ ನಿದರ್ಶನ.

ಬಹೂನಾಂ ಜನ್ಮನಾಮಂತೇ ಜ್ಞಾನವಾನ್ ಮಾಂ ಪ್ರಪದ್ಯತೇ ।
ವಾಸುದೇವಃ ಸರ್ವಮಿತಿ ಸ ಮಹಾತ್ಮಾ ಸುದುರ್ಲಭಃ ॥೧೯॥

ಬಹೂನಾಮ್ ಜನ್ಮನಾಮ್ ಅಂತೇ ಜ್ಞಾನವಾನ್ ಮಾಮ್ ಪ್ರಪದ್ಯತೇ ।
ವಾಸುದೇವಃ ಸರ್ವಮ್ ಇತಿ ಸಃ ಮಹಾ ಆತ್ಮಾ ಸು ದುರ್ಲಭಃ -- ಬಹಳ ಜನ್ಮಗಳ ಸಾಧನೆಯ ಕೊನೆಯಲ್ಲಿ ಅರಿವು ಪಡೆದು ನನ್ನನ್ನು ಸೇರುತ್ತಾನೆ. 'ವಾಸುದೇವನೇ ಎಲ್ಲೆಡೆ ತುಂಬಿರುವ ಪೂರ್ಣತತ್ವ' ಎಂದರಿತ ಅಂತಹ ಹಿರಿಯ ವ್ಯಕ್ತಿ ತುಂಬಾ ವಿರಳ.

ಜೀವನದಲ್ಲಿ ಜ್ಞಾನಿ ಎನಿಸಿಕೊಳ್ಳುವುದು ಸುಲಭದ ಕೆಲಸವಲ್ಲ. ಕೃಷ್ಣ ಹೇಳುತ್ತಾನೆ: "ಬಹೂನಾಂ ಜನ್ಮನಾಮಂತೇ ಜ್ಞಾನವಾನ್ ಮಾಂ ಪ್ರಪದ್ಯತೇ" ಎಂದು. ಅಂದರೆ "ಅನೇಕಾನೇಕ ಜನ್ಮಗಳ ಸಾಧನೆಯಿಂದ, ಜಿಜ್ಞಾಸೆಯಿಂದ, ಅಧ್ಯಯನದಿಂದ ಜ್ಞಾನ ಬರುತ್ತದೆ ಮತ್ತು ಇಂತಹ ಜ್ಞಾನಿ ಸಹಜವಾಗಿ ನನಗೆ ಶರಣಾಗುತ್ತಾನೆ". ಹಿಂದಿನ ಅಧ್ಯಾಯಗಳಲ್ಲಿ ಹೇಳಿದಂತೆ ಜ್ಞಾನ ಸಂಪಾದನೆ ಒಂದು ಜನ್ಮದ ಸಾಧನೆ ಅಲ್ಲ. ಆದರೆ ಒಂದು ಜನ್ಮದಲ್ಲಿ ಮಾಡಿದ ಅಧ್ಯಾತ್ಮ ಸಾಧನೆ ಎಂದೂ ನಷ್ಟವಾಗುವುದಿಲ್ಲ. ಹುಟ್ಟುವಾಗಲೇ ನಾವು ನಮ್ಮ ಹಿಂದಿನ ಜನ್ಮದ ಅಧ್ಯಾತ್ಮ ಸಾಧನೆಯ ಜ್ಞಾನವನ್ನು ಹೊತ್ತು ಹುಟ್ಟುತ್ತೇವೆ. ಇದು ಮಾನವನಿಗೆ ಭಗವಂತನ ಮಹಾ ಪ್ರಸಾದ. ಜ್ಞಾನ ಎನ್ನುವುದು ನೂರಾರು ಜನ್ಮಗಳ ಸಂಚಯನ. ಇದು ಒಂದು ಜನ್ಮದಲ್ಲಿ ಪಡೆಯಬಹುದಾದ ವಿಷಯವಲ್ಲ. ನಾವು ಎಷ್ಟು ತಿಳಿದಿದ್ದರೂ ಕೂಡಾ ಅದು ಕಡಿಮೆಯೇ. ಭಗವಂತನೇ ಹೇಳುವಂತೆ ವೇದದ ಪೂರ್ಣ ಅರ್ಥವನ್ನು ಭಗವಂತನಲ್ಲದೆ ಇನ್ಯಾರೂ ತಿಳಿದಿಲ್ಲ.

ಹೀಗೆ ಯಾರು ಜನ್ಮ ಜನ್ಮಗಳ ಸಾಧನೆಯಿಂದ ಜ್ಞಾನಿ ಎನಿಸುತ್ತಾನೋ ಆತ ಸರ್ವಸ್ವವನ್ನೂ ವಾಸುದೇವನಲ್ಲಿ ಅರ್ಪಿಸಿ ಮೋಕ್ಷ ಪಡೆಯುತ್ತಾನೆ. ಇಲ್ಲಿ ವಾಸುದೇವ ಎನ್ನುವ ಭಗವಂತನ ನಾಮಕ್ಕೆ ವಿಶೇಷ ಅರ್ಥವಿದೆ. ವಾಸು+ದೇವ-ವಾಸುದೇವ. ಭಗವಂತ ವಾಸು, ಅಂದರೆ ತನ್ನನ್ನು ತಾನು ಮುಚ್ಚಿಕೊಂಡವನು. ಯಾವಾಗ ನಾವು ಜ್ಞಾನವನ್ನು ಪಡೆದು, ಹದಿನೈದು ಬೇಲಿಗಳನ್ನು ದಾಟಿ, ಸಮಾಧಿ ಸ್ಥಿತಿಯಿಂದ ಆಳಕ್ಕಿಳಿದು, ಹದಿನಾರನೇ ಜೀವಸ್ವರೂಪವನ್ನು ಕಾಣುತ್ತೇವೋ, ಆಗ ಭಗವಂತನ ಸಾಕ್ಷಾತ್ಕಾರವಾಗುತ್ತದೆ. ಈ ಸ್ಥಿತಿಯಲ್ಲಿ ಮುಚ್ಚಿಕೊಂಡ ಭಗವಂತ ದೇವನಾಗಿ ತೆರೆದುಕೊಳ್ಳುತ್ತಾನೆ. ಭಗವಂತನನ್ನು ಕಾಣಬೇಕಾದರೆ ಮೊದಲು ನಾವು ನಮ್ಮನ್ನು ಕಾಣಬೇಕು. ನಮ್ಮ ಅರಿವೇ ನಮಗಿಲ್ಲದೆ ಭಗವಂತನನ್ನು ಕಾಣುವುದು ಅಸಾಧ್ಯ. ನಾವು ನಮ್ಮ ಜೀವಸ್ವರೂಪವನ್ನು ಕಂಡಾಗ, ಅದರೊಳಗಿನಿಂದ ಸಾಕ್ಷಾತ್ಕಾರವಾಗುವ ಭಗವಂತ ದೇವಃ. ನಾವು ನಮ್ಮ ಪಂಚಕೋಶಗಳ ಪರದೆಯಲ್ಲಿದ್ದಾಗ ವಾಸುವಾಗಿ; ಜ್ಞಾನ ಸಂಪಾದನೆಯಿಂದ ಪರದೆಯಿಂದಾಚೆಗೆ ಬಂದು ಜೀವ ಸ್ವರೂಪವನ್ನು ಕಂಡಾಗ ದೇವನಾಗಿ ದರ್ಶನ ಕೊಡುವ ಭಗವಂತ ವಾಸುದೇವಃ.

ಹೀಗೆ ಅನೇಕ ಜನ್ಮಗಳ ಸಾಧನೆಯಿಂದ ಜ್ಞಾನ ಸಂಪಾದಿಸಿ, ಭಗವಂತನನ್ನು ತಿಳಿದು, ಭಗವಂತನಲ್ಲಿ ಶರಣಾಗುವ ಜ್ಞಾನಿ ಬಹಳ ಹಿರಿಯ. ಜಗತ್ತಿನಲ್ಲಿ ಇಂತವರು ಬಹಳ ವಿರಳ ಎನ್ನುತ್ತಾನೆ ಕೃಷ್ಣ.

ಇಲ್ಲಿ ನಾವು ನಾಲ್ಕು ಬಗೆಯ ಭಕ್ತರನ್ನು ಮತ್ತು ಅವರಲ್ಲಿ ಜ್ಞಾನಿಯ ಶ್ರೇಷ್ಠತೆಯನ್ನು ನೋಡಿದೆವು. ಈ ನಾಲ್ಕು ಬಗೆಯಲ್ಲೂ ಸೇರದೇ ಪಂಚಮರಾಗಿ ಹೊರಗುಳಿಯುವ ಜನರು ಏಕೆ ಹಾಗಿರುತ್ತಾರೆ ಎನ್ನುವ ವಿಚಾರವನ್ನೂ ಕೃಷ್ಣ ವಿವರಿಸಿದ. ಮನುಷ್ಯ ನಿಜವಾದ ಅಧ್ಯಾತ್ಮ ಮಾರ್ಗದಲ್ಲಿ ನಡೆಯದೇ ಎಲ್ಲಿ ಎಡವುತ್ತಾನೆ ಎನ್ನುವ ಅಂಶಗಳನ್ನು ಕೃಷ್ಣ ಈ ಅಧ್ಯಾಯದ ಮುಂದಿನ ಭಾಗದಲ್ಲಿ ವಿವರಿಸುತ್ತಾನೆ.

ಕಾಮೈಸ್ತೈಸ್ತೈರ್ಹೃತಜ್ಞಾನಾಃ ಪ್ರಪದ್ಯಂತೇಽನ್ಯದೇವತಾಃ ।
ತಂತಂ ನಿಯಮಮಾಸ್ಥಾಯ ಪ್ರಕೃತ್ಯಾ ನಿಯತಾಃ ಸ್ವಯಾ ॥೨೦॥

**ಕಾಮೈಃ ತೈಃ ತೈಃ ಹೃತ ಜ್ಞಾನಾಃ ಪ್ರಪದ್ಯಂತೇ ಅನ್ಯ ದೇವತಾಃ ।**
**ತಮ್ ತಮ್ ನಿಯಮಮ್ ಆಸ್ಥಾಯ ಪ್ರಕೃತ್ಯಾ ನಿಯತಾಃ ಸ್ವಯಾ-ಯಾವ ಯಾವುದೋ ಬಯಕೆಗಳಿಂದ ಅರಿವು ಅಳಿದವರು ತಮ್ಮ ಸ್ವಭಾವ –ಸಂಸ್ಕಾರಗಳಿಗೆ ತಕ್ಕಂತೆ ಆಯಾ ಕಟ್ಟಲೆಗಳಿಗೆ ಕಟ್ಟುಬಿದ್ದು ಬೇರೆ ಬೇರೆ ದೇವತೆಗಳಿಗೆ ಮೊರೆಹೋಗುತ್ತಾರೆ.**

ಕೃಷ್ಣ ಹಿಂದಿನ ಅಧ್ಯಾಯಗಳಲ್ಲಿ ಹೇಳಿರುವ ವಿಚಾರವನ್ನು ಮತ್ತೆ ಒತ್ತು ಕೊಟ್ಟು ಇಲ್ಲಿ ವಿವರಿಸುತ್ತಾನೆ. ಮನುಷ್ಯ ಅಧ್ಯಾತ್ಮ ಮಾರ್ಗದಿಂದ ದೂರ ಸರಿಯಲು ಮೂಲ ಕಾರಣ ಅವನ ಹುಚ್ಚು ಬಯಕೆಗಳು. ಇದು ನಮ್ಮ ಅರಿವಿಗೆ ದೊಡ್ಡ ಅಡ್ಡಗೋಡೆ. ಬಯಕೆಗಳನ್ನು ನಿಯಂತ್ರಿಸಲು ಸಾಧ್ಯವಾಗದೇ ಇದ್ದಾಗ, ಮನುಷ್ಯ ಅಧ್ಯಾತ್ಮದ ಬೆನ್ನುಹತ್ತುವ ಬದಲು ಬಯಕೆಗಳ ಬೆನ್ನು ಹತ್ತುತ್ತಾನೆ. ಬಯಕೆಗಳ ಈಡೇರಿಕೆಗೋಸ್ಕರ ಮಾಡಬಾರದ್ದನ್ನು ಮಾಡುತ್ತಾ ಹೋಗುತ್ತಾನೆ ಮತ್ತು ಅಧಃಪತನವನ್ನು ಹೊಂದುತ್ತಾನೆ.
ಬಯಕೆಗಳ ಬೆನ್ನುಹತ್ತಿದಾಗ ಬಯಕೆ ಅರಿವನ್ನು ನಿಯಂತ್ರಿಸಲಾರಂಭಿಸುತ್ತದೆ. ಈ ಸಮಯದಲ್ಲಿ ಯಾರಾದರೂ 'ನಿನ್ನ ಇಷ್ಟಾರ್ಥ ಸಿದ್ಧಿಗಾಗಿ ಈ ದೇವಾಲಯಕ್ಕೆ ಹೋಗು' ಎಂದರೆ ಆತ ಅಲ್ಲಿಗೆ ಹೋಗುತ್ತಾನೆ . ಹೀಗೆ ಇಷ್ಟಾರ್ಥ ಸಿದ್ಧಿ ಎಲ್ಲಿ ಸಾಧ್ಯ ಎಂದು ಸುದ್ದಿ ಬಂತೋ ಅಲ್ಲಿಗೆ ಭೇಟಿ ಕೊಡಲಾರಂಭಿಸುತ್ತಾನೆ. ಇದರಿಂದಾಗಿ ಆತ ಮೂಲ ಅಧ್ಯಾತ್ಮ ತತ್ವವನ್ನು ಬಿಟ್ಟು, ಏಕಭಕ್ತಿಯಿಂದ ದೂರ ಸರಿದು, ಎಲ್ಲಿ ತನ್ನ ಅಪೇಕ್ಷೆ ಈಡೇರುತ್ತದೋ ಅಲ್ಲಿ, ಆಯಾ ದೇವತೆಗಳನ್ನು ತನ್ನ ಭೌತಿಕ ಬಯಕೆಗಳನ್ನು ಈಡೇರಿಸುವಂತೆ ಬೇಡಿ ಪೂಜಿಸಲಾರಂಭಿಸುತ್ತಾನೆ. ಅದಕ್ಕಾಗಿ ಯಾವುದ್ಯಾವುದೋ ವ್ರತಾಚರಣೆ ಮಾಡಲಾರಂಭಿಸುತ್ತಾನೆ. ಇದರಿಂದಾಗಿ ಆತ ನಿಜವಾದ ಭಗವಂತನ ಉಪಾಸನೆಯ ಮಾರ್ಗದಿಂದ ದೂರ ಸರಿಯುತ್ತಾನೆ. ಏಕಭಕ್ತಿ ಉಪಾಸನೆಯಿಂದ ಈ ರೀತಿಯ ಅಲ್ಪ ಬಯಕೆ ಎಂದೂ ಈಡೇರುವುದಿಲ್ಲ. ಏಕೆಂದರೆ 'ಯದನುಗ್ರಹಮಿಚ್ಛಾಮಿ ತಸ್ಯ ವಿತ್ತಂ ಹರಾಮ್ಯಹಂ' ಭಕ್ತರ ಸಂಪತ್ತನ್ನು ಇಲ್ಲದಂತೆ ಮಾಡಿ, ಪರೀಕ್ಷಿಸಿ, ನಂತರ ಅವರನ್ನು ಉದ್ಧರಿಸುವುದೇ ಭಗವಂತನ ಸಂಕಲ್ಪ. ನಮಗೆ ಏನು ಬೇಕು ಎನ್ನುವುದು ನಮಗಿಂತ ಚೆನ್ನಾಗಿ ಭಗವಂತನಿಗೆ ಗೊತ್ತು. ಆತನ ಅನುಗ್ರಹ ಮಹಾಪ್ರಸಾದ. ಈ ಅರಿವು ಬಯಕೆಗಳ ಬೆನ್ನು ಹತ್ತಿದವರಿಗೆ ಇರುವುದಿಲ್ಲ ಮತ್ತು ಇದರಿಂದ ಅವರು ಭಗವಂತನ ಅನುಗ್ರಹದಿಂದ ವಂಚಿತರಾಗುತ್ತಾರೆ.
ಏಕೆ ಹೀಗೆ? ಏಕೆ ಎಲ್ಲರೂ ಒಂದೇ ರೀತಿಯಾಗಿ ಭಗವಂತನನ್ನು ಪೂಜಿಸುವುದಿಲ್ಲ? ಇದಕ್ಕೆ ಕೃಷ್ಣ ಹೇಳುತ್ತಾನೆ "ತನ್ತಂ ನಿಯಮಮಾಸ್ಥಾಯ ಪ್ರಕೃತ್ಯಾ ನಿಯತಾಃ ಸ್ವಯಾ". "ಪ್ರತಿಯೊಂದು ಜೀವಕ್ಕೂ ಅದರದ್ದೇ ಆದ ಪ್ರಕೃತಿ ಇದೆ" ಎಂದು. [ಇಲ್ಲಿ 'ಪ್ರಕೃತಿ' ಎಂದರೆ ಒಂದು 'ಜೀವ ಸ್ವಭಾವ' ಹಾಗೂ ಇನ್ನೊಂದು 'ಪರಿಸರ ಮತ್ತು ಹುಟ್ಟಿಬಂದ ಮನೆತನದ ಸಂಸ್ಕಾರ(genes and environmental force)' ] ಮನುಷ್ಯನ ಈ ಜೀವಸ್ವಭಾವವನ್ನು ಎಂದೂ ಯಾರಿಂದಲೂ ಬದಲಿಸಲು ಸಾಧ್ಯವಿಲ್ಲ. ಒಬ್ಬೊಬ್ಬರ ಸ್ವಭಾವ ಒಂದೊಂದು ತರಹ. ಈ ಕಾರಣದಿಂದ ಏಕರೂಪ ಸ್ವಭಾವ ಈ ಜಗತ್ತಿನಲ್ಲಿಲ್ಲ. ಈ ಭೂಮಿಯ ಮೇಲೆ ಎಷ್ಟೋ ಭಾರಿ ಭಗವಂತ ಮತ್ತು ಅನೇಕ ಮಹಾತ್ಮರು ಅವತರಿಸಿ ಬಂದು ಸತ್ಯವನ್ನು ಭೋಧನೆ ಮಾಡಿದರೂ ಕೂಡಾ, ಏಕಧರ್ಮ ಸ್ಥಾಪನೆ ಆಗಲಿಲ್ಲ. ಕಾರಣ ಏನೆಂದರೆ ಸ್ವತಃ ಭಗವಂತನೇ ಬಂದು ಹೇಳಿದರೂ ಕೂಡಾ-ಸತ್ಯವನ್ನು ತಿಳಿಯಬಲ್ಲ ಜೀವಸ್ವಭಾವವುಳ್ಳ ಜೀವ ಮಾತ್ರ ಆ ಸತ್ಯವನ್ನು ಗ್ರಹಿಸಬಲ್ಲವು, ಉಳಿದ ಜೀವಗಳಿಗೆ ಸತ್ಯವನ್ನು ಗ್ರಹಿಸುವ ಶಕ್ತಿ ಇರುವುದಿಲ್ಲ. ಇದು

ತೀರಾ ಸಹಜ. ಆದ್ದರಿಂದ ಕೃಷ್ಣ ಹೇಳುತ್ತಾನೆ "ಸತ್ಯವನ್ನು ಒಪ್ಪುವುದಕ್ಕೂ ಕೂಡಾ ಜೀವಕ್ಕೆ ಯೋಗ್ಯತೆ ಬೇಕು" ಎಂದು. ಹೀಗೆ ಜೀವ ಸ್ವರೂಪದ ಯೋಗ್ಯತೆಗನುಗುಣವಾಗಿ ಅವರವರಿಗೆ ಇಷ್ಟವಾಗುವ ದೇವತಾ ಉಪಾಸನೆ ಪ್ರಪಂಚದಲ್ಲಿ ನಡೆಯುತ್ತದೆ. ಈ ಕಾರಣದಿಂದ ಪ್ರಪಂಚದಲ್ಲಿ ಎಲ್ಲರೂ ನಿಜವಾದ ಭಗವದ್ ಭಕ್ತರಾಗಲು ಸಾಧ್ಯವಿಲ್ಲ, ಅದು ಕೇವಲ ಸಾತ್ವಿಕ ಚೇತನಕ್ಕೆ ಮಾತ್ರ ಸಾಧ್ಯ.

ಯೋಯೋ ಯಾಂಯಾಂ ತನುಂ ಭಕ್ತಃ ಶ್ರದ್ಧಯಾsರ್ಚಿತುಮಿಚ್ಛತಿ ।
ತಸ್ಯ ತಸ್ಯಾಚಲಾಂ ಶ್ರದ್ಧಾಂ ತಾಮೇವ ವಿದಧಾಮ್ಯಹಮ್ ॥೨೧॥

ಯಃ ಯಃ ಯಾಮ್ ಯಾಮ್ ತನುಮ್ ಭಕ್ತಃ ಶ್ರದ್ಧಯಾ ಅರ್ಚಿತುಮ್ ಇಚ್ಛತಿ ।
ತಸ್ಯ ತಸ್ಯ ಅಚಲಾಮ್ ಶ್ರದ್ಧಾಮ್ ತಾಮ್ ಏವ ವಿದಧಾಮಿ ಅಹಮ್-ಯಾರು ಯಾವ ದೇವತಾರೂಪವನ್ನು ಭಕ್ತಿಯಿಟ್ಟು ಶ್ರದ್ಧೆಯಿಂದ ಪೂಜಿಸಬಯಸುತ್ತಾರೋ ಅವರಿಗೆ ಅಂತಹದ್ದೇ ಶ್ರದ್ಧೆಯನ್ನು ನಾನು ಗಟ್ಟಿಗೊಳಿಸುತ್ತೇನೆ.

ಭಗವಂತನೆಂಬ ಅಸಾಧಾರಣ ಶಕ್ತಿ ತನ್ನ ದೇವತಾ ಪರಿವಾರದೊಂದಿಗೆ ಈ ಜಗತ್ತನ್ನು ನಿಯಂತ್ರಿಸುತ್ತಿದೆ ಎನ್ನುವ ಎಚ್ಚರ ಇಲ್ಲದೇ, ಭಗವಂತನ ಮೇಲಿನ ಏಕಭಕ್ತಿ ಬಿಟ್ಟು, ಕೇವಲ ಒಂದು ದೇವತೆಯನ್ನು ಶ್ರದ್ಧೆಯಿಂದ ಪೂಜೆ ಮಾಡಲು ಆಯ್ಕೆ ಮಾಡಿಕೊಂಡವರಿಗೆ –"ಯಾವ ದೇವತೆಯ ಮೇಲೆ ಭಕ್ತಿ ಇದೆಯೋ ಅದನ್ನೇ ಆಚಲವಾಗಿಸುತ್ತೇನೆ" ಎನ್ನುತ್ತಾನೆ ಕೃಷ್ಣ!

ಮನುಷ್ಯ ಶ್ರದ್ಧೆಯ ಸ್ವರೂಪ. ಯಾವುದರ ಬಗೆಗೆ ಶ್ರದ್ಧೆ ಮೂಡಿತೋ ಅದೇ ಅವನಲ್ಲಿ ಬೆಳೆದುಕೊಂಡು ಹೋಗುತ್ತದೆ. ಯಾವ ದೇವತಾ ಶಕ್ತಿಯನ್ನು ಶ್ರದ್ಧೆಯಿಂದ ಆರಾಧನೆ ಮಾಡಿದೆವೋ ಅದೇ ನಂಬಿಕೆ ನಮ್ಮಲ್ಲಿ ಗಟ್ಟಿಯಾಗುತ್ತಾ ಹೋಗುತ್ತದೆ ಮತ್ತು ಆ ಶ್ರದ್ಧೆ ನಿಶ್ಚಲವಾಗುತ್ತದೆ. ಅದನ್ನು ಬದಲಿಸುವುದು ಬಹಳ ಕಷ್ಟ. ಈ ಕಾರಣಕ್ಕಾಗಿ ನಾವು ದೇವರ ಬಗ್ಗೆ ತಿಳಿದುಕೊಳ್ಳಬೇಕು. ದೇವರು ಮತ್ತು ದೇವತಾ ಪರಿವಾರ ಎಂದರೆ ಮಾನವರಂತೆ ಒಬ್ಬರನ್ನೊಬ್ಬರು ದ್ವೇಷಿಸುವ ಆಸೂಹೆ ಪಡುವ ಸಂಸ್ಕೃತಿ ಉಳ್ಳ ಒಂದು ಗುಂಪು ಎಂದು ನಾವು ತಿಳಿದಿದ್ದರೆ ಅದು ನಮ್ಮ ಮೌಢ್ಯತೆಯ ಪರಮಾವಧಿ. ಹಿಂದೆ ಹೇಳಿದಂತೆ ಭಗವಂತ ಅನ್ನುವುದು ಏಕಶಕ್ತಿ. ಆತ ಸದಾ ತನ್ನ ದೇವತಾ ಪರಿವಾರದೊಂದಿಗೆ ಅಭಿವ್ಯಕ್ತವಾಗುತ್ತಾನೆ. ನಾವು ಗಣಪತಿ ಅಥವಾ ಇನ್ಯಾವುದೇ ದೇವತೆಯ ಆರಾಧನೆ ಮಾಡುವಾಗ ನಮಗೆ ಆ ಏಕಶಕ್ತಿಯ ಎಚ್ಚರ ಇದ್ದು ಮಾಡಿದರೆ ಆ ಪೂಜೆ ಮಹಾ ಪೂಜೆಯಾಗುತ್ತದೆ. ಅದನ್ನು ಬಿಟ್ಟು ಗಣಪತಿಯೇ(ಅಥವಾ ಇನ್ಯಾವುದೇ ದೇವತೆ) ಬೇರೆ, ಅವನೊಬ್ಬನೇ ದೇವರು ಎಂದು ತಿಳಿದು ಅದರಲ್ಲೇ ಶ್ರದ್ಧೆ ಬೆಳೆಸಿಕೊಂಡರೆ, ಆಗ ಆ ಶ್ರದ್ಧೆಯ ಬೇಲಿಯಲ್ಲಿ ನಾವು ಸಿಕ್ಕಿ ಹಾಕಿಕೊಳ್ಳುತ್ತೇವೆ. ಇದು ಕಲ್ಲಿನ ಮೂರ್ತಿಯನ್ನು ದೇವರೆಂದು ಪೂಜಿಸಿದಂತಾಗುತ್ತದೆ. ನಿಜವಾಗಿ ನಾವು ಪೂಜಿಸುವುದು ಕಲ್ಲಿನ ಮೂರ್ತಿಯನ್ನಲ್ಲ –ಅದರಲ್ಲಿನ ಭಗವಂತನ ಪ್ರತೀಕವನ್ನು. ಕಲ್ಲಿನ ಮೂರ್ತಿ ಕೇವಲ ದೇವತಾ ಪ್ರತೀಕ. ಸರ್ವಶಕ್ತ ಭಗವಂತ ಆ ಮೂರ್ತಿಯೊಳಗೆ ಅಂತರ್ಗತನಾಗಿದ್ದಾನೆ. ಆದ್ದರಿಂದ ಯಾವುದೇ ದೇವತಾ ಪ್ರತೀಕವನ್ನು ಪೂಜಿಸುವಾಗಲೂ ಕೂಡಾ 'ಭಗವಂತ ಒಬ್ಬನೇ, ಆತ ಈ ದೇವತೆಯ ಪ್ರತೀಕದಲ್ಲಿ ಅಂತರ್ಗತನಾಗಿ, ತನ್ನ ಸಮಸ್ತ ದೇವತಾ ಪರಿವಾರದ ಮೂಲಕ ನಮ್ಮನ್ನು ರಕ್ಷಿಸುತ್ತಿದ್ದಾನೆ' ಎನ್ನುವ ಅನುಸಂಧಾನ ಬಹಳ ಮುಖ್ಯ. ಈ ಅನುಸಂಧಾನದಿಂದ ಗಣಪತಿಯನ್ನಾಗಲೀ, ವೀರಭದ್ರನನ್ನಾಗಲೀ, ಕೋಟಿ ಚನ್ನಯ್ಯನನ್ನಾಗಲಿ, ಅಥವಾ

ಇನ್ಯಾವುದೇ ದೇವತೆಯನ್ನು ಪೂಜಿಸಿದರೂ ಕೂಡಾ ಅದು ಪರಮಾತ್ಮ ಮೆಚ್ಚುವ ಮಹಾ ಪೂಜೆಯಾಗುತ್ತದೆ. ನಾವು ಮಾಡುವ ವೃತ ಅನುಷ್ಠಾನ ಕೂಡಾ ಇದೇ ರೀತಿಯಾಗಿರಬೇಕು. ಅದು ಏಕಾದಶಿಯ ಉಪವಾಸವಾಗಿರಲೀ ಅಥವಾ ಸಂಕಷ್ಟಹರ ಚತುರ್ಥಿಯ ಉಪವಾಸವಾಗಿರಲೀ, ಎಲ್ಲವೂ ಕೂಡಾ ಆ ಭಗವದ್ ಪ್ರೀತ್ಯರ್ಥವಾಗಿರಬೇಕು. ಭಗವಂತ ಸರ್ವ ಶಬ್ದವಾಚ್ಯ-ಆದ್ದರಿಂದ ಯಾವ ಹೆಸರಿನಿಂದ ಕರೆದರೂ ಅದು ಭಗವಂತನ ಹೆಸರು; ಭಗವಂತ ಸರ್ವ ಸಮರ್ಥ-ಆದ್ದರಿಂದ ಆತ ಕಲ್ಲಿನಲ್ಲೂ ಇರಬಹುದು ಕಂಬದಲ್ಲೂ ಇರಬಹುದು; ಭಗವಂತ ಸರ್ವಾಂತರ್ಯಾಮಿ-ಸರ್ವ ದೇವತೆಗಳ ಅಂತರ್ಯಾಮಿಯಾಗಿದ್ದು ನಮ್ಮನ್ನು ರಕ್ಷಿಸುವವನು ಆ ಭಗವಂತ. ಈ ಅನುಸಂಧಾನದಿಂದ ಮಾಡುವ ಭಕ್ತಿ ಶ್ರೇಷ್ಠ ಭಕ್ತಿ ಎನಿಸುತ್ತದೆ. ಇದನ್ನು ಬಿಟ್ಟು ಅಂಧಶ್ರದ್ಧೆಯನ್ನು ಬೆಳೆಸಿಕೊಂಡರೆ ಅದೇ ನಮ್ಮಲ್ಲಿ ಗಟ್ಟಿಯಾಗಿ ನಮ್ಮನ್ನು ಅಧಃಪಾತಕ್ಕೆ ತಳ್ಳಬಹುದು!

ಸ ತಯಾ ಶ್ರದ್ಧಯಾ ಯುಕ್ತಸ್ತಸ್ಯಾಽರಾಧನಮೀಹತೇ ।
ಲಭತೇ ಚ ತತಃ ಕಾಮಾನ್ ಮಯ್ಯೈವ ವಿಹಿತಾನ್ ಹಿ ತಾನ್ ॥೨೨॥

ಸಃ ತಯಾ ಶ್ರದ್ಧಯಾ ಯುಕ್ತಃ ತಸ್ಯ ಆರಾಧನಮ್ ಈಹತೇ ।
ಲಭತೇ ಚ ತತಃ ಕಾಮಾನ್ ಮಯಾ ಏವ ವಿಹಿತಾನ್ ಹಿ ತಾನ್-ಅವನು ಶ್ರದ್ಧೆಯನ್ನೇ ಆತುಕೊಂಡು ಆಯಾ ದೇವತೆಗಳನ್ನು ಪೂಜಿಸತೊಡಗುತ್ತಾನೆ. ಅದರ ಫಲವಾಗಿ ನಾನೇ ಈಡೇರಿಸಿದ ಆಯಾ ಬಯಕೆಗಳನ್ನು ಪಡೆಯುತ್ತಾನೆ.

ಮೇಲೆ ಹೇಳಿದ ಏಕಭಕ್ತಿಯನ್ನು ಪಾಲಿಸದೆ ಯಾವುದೋ ಒಂದು ದೇವತೆಯನ್ನು ಅಚಲವಾಗಿ ಪೂಜಿಸಿ ಫಲ ಪಡೆಯುವವರನ್ನು ಪ್ರಪಂಚದಲ್ಲಿ ಕಾಣುತ್ತೇವೆ. ಇಲ್ಲಿ 'ತಪ್ಪು ಪೂಜಾಕ್ರಮದಿಂದಲೂ ಹೇಗೆ ಫಲ ಸಿಗುತ್ತದೆ' ಎನ್ನುವ ಪ್ರಶ್ನೆ ನಮ್ಮಲ್ಲಿ ಸಹಜವಾಗಿ ಮೂಡುತ್ತದೆ. ಕೃಷ್ಣ ಹೇಳುತ್ತಾನೆ "ನೀನು ಯಾರನ್ನು ಉಪಾಸನೆ ಮಾಡಿದರೂ ಕೊನೆಗೆ ಫಲ ಕೊಡುವವನು ನಾನೇ" ಎಂದು. ಶಾಸ್ತ್ರಗಳಲ್ಲಿ ಹೇಳುವಂತೆ "ಸರ್ವ ದೇವ ನಮಸ್ಕಾರಃ ಕೇಶವಂ ಪ್ರತಿಗಚ್ಛತಿ". ಯಾರನ್ನು ಪೂಜೆ ಮಾಡಿದರೂ ಅದು ಸಲ್ಲುವುದು ಅದರೊಳಗಿನ ಭಗವಂತನನ್ನೇ. ಆದರೆ ವ್ಯತ್ಯಾಸ ಒಂದೆ-ತಿಳಿದು ಮಾಡಿದಾಗ 'ಶಾಶ್ವತವಾದ ಪೂರ್ಣಫಲ', ತಿಳಿಯದೇ ಫಲಕಾಮನೆಯಿಂದ ಮಾಡಿದಾಗ 'ಭೌತಿಕವಾದ ಅಲ್ಪಫಲ'.

ನಾವು ಯಾವುದೇ ಆರಾಧ್ಯ ಮೂರ್ತಿಯನ್ನು ಪೂಜಿಸಿದರೂ ಕೂಡಾ ಆ ಆರಾಧ್ಯ ಮೂರ್ತಿಯ ಅಂತರ್ಯಾಮಿಯಾಗಿದ್ದು ಫಲ ಕೊಡುವವನು ಭಗವಂತನೇ. ಆದರೆ 'ದೇವತಾ ಅಂತರ್ಗತನಾದ ಭಗವಂತ ಕೊಟ್ಟ' ಅನ್ನುವ ಅರಿವು ನಮಗಿರುವುದಿಲ್ಲ ಅಷ್ಟೇ. ನಮ್ಮ ಪ್ರತಿಯೊಂದು ಕ್ರಿಯೆಯಲ್ಲಿಯೂ ಈ ಎಚ್ಚರ ಬಹಳ ಮುಖ್ಯ. ನಾವು ನಮ್ಮ ಪ್ರತಿಯೊಂದು ಅನುಸಂಧಾನವನ್ನು ಭಗವಂತನ ಪೂಜಾ ರೂಪವಾಗಿ ಮಾಡಿ ಭವ್ಯ(divine)ವಾಗಿಸಬೇಕು. ಇಲ್ಲದಿದ್ದರೆ ಮಹಾಫಲದಿಂದ ವಂಚಿತರಾಗಿ ಯಾವುದೋ ಕ್ಷುದ್ರ ಫಲ ನಮ್ಮದಾಗುತ್ತದೆ. [ಇಲ್ಲಿ "ಮಯ್ಯೈವ ವಿಹಿತಾನ್ ಹಿ ತಾನ್" ಎಂದರೆ ನಾನೇ ದೇವತೆಯೊಳಗಿದ್ದು ಫಲವನ್ನು

ಕೊಡುವವನು ಎಂದರ್ಥವಾದರೆ, 'ಮಯ್ಯೈವ ವಿಹಿತಾನ್ ಹಿತಾನ್' ಎಂದರೆ 'ನೀನು ಬಯಸಿದ-'ನಿನಗೆ ಹಿತವಾದ' ಕ್ಷಣಿಕ ಫಲವನ್ನು ನನ್ನಿಂದ ಪಡೆಯುತ್ತೀಯ' ಎಂದರ್ಥ].

ಅಂತವತ್ತು ಫಲಂ ತೇಷಾಂ ತದ್ ಭವತ್ಯಲ್ಪಚೇತಸಾಮ್ ।
ದೇವಾನ್ ದೇವಯಜೋ ಯಾಂತಿ ಮದ್ ಭಕ್ತಾ ಯಾಂತಿ ಮಾಮಪಿ ॥೨೩॥

ಅಂತವತ್ ತು ಫಲಮ್ ತೇಷಾಮ್ ತತ್ ಭವತಿ ಅಲ್ಪಚೇತಸಾಮ್ ।
ದೇವಾನ್ ದೇವಯಜಃ ಯಾಂತಿ ಮತ್ ಭಕ್ತಾಃ ಯಾಂತಿ ಮಾಮ್ ಅಪಿ-ಅಲ್ಪಮತಿಗಳಾದ ಅಂತವರ ಆ ಫಲಕ್ಕೆ ಅಳಿವುಂಟು. ದೇವತೆಗಳನ್ನು ಪೂಜಿಸುವವರು ದೇವತೆಗಳನ್ನು ಸೇರುತ್ತಾರೆ. ನನ್ನ ಭಕ್ತರು ನನ್ನನ್ನು ಸೇರುತ್ತಾರೆ.

ಕೃಷ್ಣನ ಮಾತನ್ನು ಕೇಳಿದಾಗ ನಮ್ಮಲ್ಲಿ ಒಂದು ಭಾವನೆ ಮೂಡಬಹುದು: "ಯಾರು ಫಲ ಕೊಟ್ಟರೆ ನಮಗೇನು? ನನಗೆ ನನ್ನ ಇಷ್ಟಾರ್ಥ ಸಿದ್ಧಿಯಾದರೆ ಸಾಕು" ಎಂದು. ಅದಕ್ಕಾಗಿ ಈ ಶ್ಲೋಕದಲ್ಲಿ ಕೃಷ್ಣ ಎಚ್ಚರಿಕೆಯ ನುಡಿಯನ್ನಾಡುತ್ತಾನೆ. ಕೃಷ್ಣ ಹೇಳುತ್ತಾನೆ "ಅಂತವತ್ತು ಫಲಂ ತೇಷಾಂ ತದ್ ಭವತ್ಯಲ್ಪಚೇತಸಾಮ್" ಎಂದು. ಅಂದರೆ ಯಾವುದೋ ಒಂದು ಕ್ಷುದ್ರ ಫಲ ಸಿಕ್ಕಿತು ಎಂದು ಹಿಗ್ಗುವವರು ಅಲ್ಪಮತಿಗಳು. ಈ ರೀತಿಯಾಗಿ ಸಿಗುವ ಫಲ ಎಂದೂ ಶಾಶ್ವತ ಅಲ್ಲ, ಅದು ಕ್ಷಣಿಕ. "ನೀವು ಯಾವ ದೇವತೆಯನ್ನು ಪೂಜಿಸುತ್ತೀರೋ ಆ ದೇವತೆಯನ್ನು ಸೇರುತ್ತೀರೇ ಹೊರತು ಮೋಕ್ಷವನ್ನಲ್ಲ" ಎನ್ನುತ್ತಾನೆ ಕೃಷ್ಣ. ಯಾವ ದೇವತೆಗಳೂ ಕೂಡಾ ಅನಂತ ಕಾಲದ ತನಕ ನಮ್ಮನ್ನು ಅವರ ಲೋಕದಲ್ಲಿ ಇರಗೊಡುವುದಿಲ್ಲ. ಆದ್ದರಿಂದ ನಾವು ಮಾಡಿದ ಕರ್ಮದ ಅವಧಿ ಮುಗಿದಾಕ್ಷಣ ಮರಳಿ ಈ ಮೃತ್ಯುಲೋಕಕ್ಕೆ ಬರಬೇಕಾಗುತ್ತದೆ. ಈ ಕಾರಣದಿಂದ ಭಗವಂತನ ಅರಿವಿಲ್ಲದ ಕೇವಲ ದೇವತಾ ಉಪಾಸನೆ ಶಾಶ್ವತ ಮೋಕ್ಷವನ್ನು ಕೊಡಲಾರದು.
ಭಗವಂತನಲ್ಲಿ ಮನವಿಟ್ಟು, ಏಕಭಕ್ತಿಯಿಂದ ಭಗವಂತನನ್ನು ಭಜಿಸಿದರೆ ಆಗ 'ತದ್ಧಾಮಂ ಪರಮಂ ಮಮ'-ಎಲ್ಲಿಂದ ಎಂದೂ ಮರಳಿ ಬರಬೇಕಾಗಿಲ್ಲವೋ ಅಂತಹ ಶಾಶ್ವತವಾದ ಮೋಕ್ಷವನ್ನು ಪಡೆಯುತ್ತಾರೆ. ಭಗವಂತನನ್ನು ಪ್ರೀತಿಸುವುದರಿಂದ ಯಥಾರ್ಥ ಜ್ಞಾನ ಸಿದ್ಧಿಯಾಗುತ್ತದೆ. ಇದರಿಂದ ಎಂದೆಂದೂ ದುಃಖವಿಲ್ಲದ ಭಗವದ್ ಪ್ರಾಪ್ತಿ ರೂಪವಾದ ಮೋಕ್ಷವನ್ನು ಪಡೆಯುಬಹುದು.
ಇಲ್ಲಿ ಕೆಲವರಿಗೆ ಒಂದು ಗೊಂದಲವಾಗಬಹುದು. "ದೇವರು ಏಕೆ ಹೊಗಳುವಿಕೆಯನ್ನು ಇಷ್ಟಪಡುತ್ತಾನೆ? ಆತ ಏಕೆ ತನ್ನನ್ನು ಹೊಗಳುವವರನ್ನು ಮಾತ್ರ ಉದ್ಧರಿಸಿ ಉಳಿದವರನ್ನು ಉದ್ಧರಿಸುವುದಿಲ್ಲ?" ಎಂದು. ದೇವರು ಪ್ರೀತಿಸುವುದು ಹೊಗಳಿಕೆಯನ್ನಲ್ಲ-ಸತ್ಯವನ್ನು. ವಿಷ್ಣು ಸಹಸ್ರನಾಮದಲ್ಲಿ ಬರುವ ಸಾವಿರ ನಾಮದಲ್ಲಿ ದೇವರು ಅಂದರೆ ಏನು ಆತನ ಮಹಾತ್ಮೆ ಏನು(etymologically) ಎನ್ನುವ ಸತ್ಯ ಅಡಗಿದೆ. ಭಗವಂತ ಯಾರು ಸತ್ಯವನ್ನು ತಿಳಿಯುತ್ತಾರೋ ಅವರನ್ನು ಪ್ರೀತಿಸುತ್ತಾನೆ. ಆತನಿಗೆ ವೈಯಕ್ತಿಕ ಇಷ್ಟಾನಿಷ್ಟವಿಲ್ಲ. ಆತ ಇಷ್ಟ ಪಡುವುದು ಯಥಾರ್ಥ ಜ್ಞಾನವನ್ನು. ಯಥಾರ್ಥ ಜ್ಞಾನ-ಭಕ್ತಿ ರೂಪದಲ್ಲಿದೆ. ನಿಜವಾದ ಭಕ್ತಿ-ಯಥಾರ್ಥ ಜ್ಞಾನದಲ್ಲಿದೆ. ಯಥಾರ್ಥದ ಅರಿವು ಭಗವಂತನಿಗೆ ಇಷ್ಟ ಮತ್ತು ಇದು ಮೋಕ್ಷವನ್ನು ತಲುಪಲು ಬೇಕಾದ ಅರ್ಹತೆ. ಆದ್ದರಿಂದ ಭಗವಂತ ತನ್ನನ್ನು ಹೊಗಳುವವರನ್ನು ಉದ್ಧರಿಸುವುದಲ್ಲ. ಆತ ಯಥಾರ್ಥವನ್ನು ತಿಳಿದವರನ್ನು ಉದ್ಧರಿಸುತ್ತಾನೆ ಮತ್ತು ಅರ್ಹತೆ ಉಳ್ಳವರಿಗೆ ಮೋಕ್ಷ ಕರುಣಿಸುತ್ತಾನೆ.

"ಶಾಶ್ವತ ಫಲವನ್ನು ಕೊಡತಕ್ಕಂತಹ ಅಂತರ್ಯಾಮಿಯ ಉಪಾಸನೆಯಲ್ಲಿ ಗಟ್ಟಿಯಾಗಿ-ಮೋಕ್ಷವನ್ನು ಪಡೆ" ಎನ್ನುವುದು ಇಲ್ಲಿ ಕೃಷ್ಣನ ಸಂದೇಶ.

ಭಗವಂತನನ್ನು ತಿಳಿಯಬೇಕು ಎಂದು ಭಕ್ತಿ ಮತ್ತು ಜ್ಞಾನ ಮಾರ್ಗದಲ್ಲಿ ಸಾಗಿದವರಿಗೂ ಕೂಡಾ ಭಗವಂತನನ್ನು ತಿಳಿಯುವುದು ಎಷ್ಟು ಕಷ್ಟ ಎನ್ನುವುದನ್ನು ಕೃಷ್ಣ ಈ ಅಧ್ಯಾಯದಲ್ಲಿ ಇನ್ನೂ ವಿವರಿಸುತ್ತಾನೆ.

ಅವ್ಯಕ್ತಂ ವ್ಯಕ್ತಿಮಾಪನ್ನಂ ಮನ್ಯಂತೇ ಮಾಮಬುದ್ಧಯಃ ।
ಪರಂ ಭಾವಮಜಾನಂತೋ ಮಮಾವ್ಯಯಮನುತ್ತಮಮ್ ॥೨೪॥

ಅವ್ಯಕ್ತಮ್ ವ್ಯಕ್ತಿಮ್ ಅಪನ್ನಮ್ ಮನ್ಯಂತೇ ಮಾಮ್ ಅಬುದ್ಧಯಃ ।
ಪರಮ್ ಭಾವಮ್ ಅಜಾನಂತಃ ಮಮ ಅವ್ಯಯಮ್ ಅನುತ್ತಮಮ್-ಅಳಿವಿರದ, ಮಿಗಿಲಿರದ ನನ್ನ ಮಹಿಮೆಯ ಹಿರಿಮೆಯನ್ನರಿಯದ ತಿಳಿಗೇಡಿಗಳು ದೇಹದಿಂದ ಹುಟ್ಟಿಬರದ ನನ್ನನ್ನು ಹುಟ್ಟಿಬಂದೆ ಎಂದು [ಭಗವಂತನೇ ಜೀವಭಾವ ಪಡೆದನೆಂದು ] ತಿಳಿದುಬಿಡುತ್ತಾರೆ.

ಸಾಮಾನ್ಯವಾಗಿ ಭಗವಂತನ ಬಗೆಗೆ ಸರಿಯಾದ ತಿಳುವಳಿಕೆ ಗಳಿಸುವುದು ಕಷ್ಟ. ಆದರೆ ತಪ್ಪು ಗ್ರಹಿಕೆ ಸುಲಭ. ಇಲ್ಲಿ ಕೃಷ್ಣ ಹೇಳುತ್ತಾನೆ "ನಾನು ವಸ್ತುತಃ ಅವ್ಯಕ್ತ" ಎಂದು. ಜೀವ ವ್ಯಕ್ತ ಆಗುವುದು ಅದಕ್ಕೆ ಪಾಂಚಭೌತಿಕ ಶರೀರ ಬಂದಾಗ. ಆದ್ದರಿಂದ ಸ್ಥೂಲವಾದ ಶರೀರವುಳ್ಳದ್ದನ್ನು ವ್ಯಕ್ತ ಎನ್ನುತ್ತಾರೆ. ಭಗವಂತನಿಗೆ ಒಂದುದಿನ ನಾಶವಾಗುವ ಪಾಂಚಭೌತಿಕ ಶರೀರ ಇಲ್ಲ- ಆತ ಸರ್ವದಾ ಅವ್ಯಕ್ತ. ಇಂತಹ ಅವ್ಯಕ್ತ ಭಗವಂತ ತನ್ನ ಅವತಾರದಲ್ಲಿ ತನ್ನ ಸ್ವಂತ ಇಚ್ಛೆಯಿಂದ ಒಂದು ರೂಪದಲ್ಲಿ ಎಲ್ಲರಿಗೂ ಕಾಣಿಸಿಕೊಳ್ಳುತ್ತಾನೆ. ಶಾಸ್ತ್ರೀಯವಾಗಿ ಭಗವಂತನ ಸ್ವರೂಪದ ಅರಿವಿಲ್ಲದ ಜನ ತಮಗೆ ಕಾಣುವ ಅವತಾರರೂಪಿ ಭಗವಂತನಿಗೆ ತಮ್ಮಂತೆ ಪಾಂಚಭೌತಿಕ ಶರೀರವಿದೆ ಮತ್ತು ಭಗವಂತ ಒಂದು ದಿನ ದೇಹತ್ಯಾಗ ಮಾಡುತ್ತಾನೆ ಎಂದು ತಿಳಿಯುತ್ತಾರೆ. ವ್ಯಕ್ತವಾದ, ಸ್ಥೂಲವಾದ, ನಶ್ವರವಾದ, ಪ್ರಾಕೃತವಾದ ಶರೀರ ಇಲ್ಲದ ಭಗವಂತನನ್ನು ಅಂತಹ ಸ್ಥೂಲವಾದ ಶರೀರದೊಳಗೆ ಬದ್ಧನಾಗಿರುವವನು ಎನ್ನುವ ಅರ್ಥದಲ್ಲಿ ಅವರು ತಿಳಿದುಕೊಳ್ಳುತ್ತಾರೆ. "ಹೀಗೆ ತಿಳಿದುಕೊಳ್ಳುವವರು ಬುದ್ಧಿಶೂನ್ಯರು" ಎನ್ನುತ್ತಾನೆ ಕೃಷ್ಣ.

ನಾಹಂ ಪ್ರಕಾಶಃ ಸರ್ವಸ್ಯ ಯೋಗಮಾಯಾಸಮಾವೃತಃ ।
ಮೂಢೋಽಯಂ ನಾಭಿಜಾನಾತಿ ಲೋಕೋ ಮಾಮಜಮವ್ಯಯಮ್ ॥೨೫॥

ನ ಅಹಮ್ ಪ್ರಕಾಶಃ ಸರ್ವಸ್ಯ ಯೋಗ ಮಾಯಾ ಸಮಾವೃತಃ ।
ಮೂಢಃ ಅಯಮ್ ನ ಅಭಿಜಾನಾತಿ ಲೋಕಃ ಮಾಮ್ ಅಜಮ್ ಅವ್ಯಯಮ್-ನನ್ನ ಸಾಮರ್ಥ್ಯ ಮತ್ತು ಪ್ರಕೃತಿಯ ಮಾಯೆಯಿಂದ ಮುಚ್ಚಿಕೊಂಡಿರುವ ನಾನು ಎಲ್ಲರಿಗೂ ಬಯಲಾಗಲಾರೆ. ಹುಟ್ಟಿರದ ಸಾವಿರದ ನನ್ನನ್ನು ಈ ತಿಳಿಗೇಡಿ ಮಂದಿ ತಿಳಿಯಲಾರರು.

ಭಗವಂತ ಎಲ್ಲರಿಗೂ ಕಾಣಿಸಿಕೊಳ್ಳುವುದಿಲ್ಲ. ಆತನ ಅನಂತ ಗುಣದ ಸ್ಪಷ್ಟ ಚಿತ್ರ ಯಾರಿಗೂ ಬರುವುದು ಸಾಧ್ಯವಿಲ್ಲ. ಮನುಷ್ಯನ ಚಿಂತನೆಗೆ ಒಂದು ಮಿತಿ ಇದೆ, ಆದರೆ ಭಗವಂತ ಆ ಮಿತಿಯ ಒಳಗಿಲ್ಲ. ಆದ್ದರಿಂದ ನಮ್ಮ ಬುದ್ಧಿ ಆತನ ಅನಂತವಾದ ಜ್ಞಾನವನ್ನು, ಅನಂತವಾದ ಶಕ್ತಿಯನ್ನು, ಅನಂತ ರೂಪವನ್ನು ಗ್ರಹಿಸಲಾರದು. ನಾವು ಇಚ್ಛೆಪಟ್ಟಾಗ ಭಗವಂತ ಕಾಣುವುದಿಲ್ಲ. ಆದರೆ ಕಾಲ ಪಕ್ವವಾದಾಗ ತನ್ನ ಇಚ್ಛೆಯಂತೆ ಭಗವಂತ ಜ್ಞಾನಾನಂದ ಸ್ವರೂಪವಾದ ಮನಸ್ಸು ಮತ್ತು ಜ್ಞಾನಾನಂದ ಸ್ವರೂಪವಾದ ಇಂದ್ರಿಯಗಳಿಗೆ ಯಥಾಶಕ್ತಿ ಗೋಚರವಾಗಬಲ್ಲ. ಈ ಲೋಕದಲ್ಲಿ ಅಜ್ಞಾನದ ಮೋಹಕ್ಕೆ ಒಳಗಾದ ಜೀವಜಾತ ಎಂದೂ ಭಗವಂತನನ್ನು ಗ್ರಹಿಸಲಾರದು. ಜೀವನಿಗೂ ಮತ್ತು ಭಗವಂತನಿಗೂ ನಡುವೆ ಇರುವ ಅಜ್ಞಾನವೆಂಬ ಮಾಯಾ ಪರದೆಯಿಂದಾಗಿ ಭಗವಂತ ನಮಗೆ ಕಾಣುವುದಿಲ್ಲ.

ವೇದಾಹಂ ಸಮತೀತಾನಿ ವರ್ತಮಾನಾನಿ ಚಾರ್ಜುನ ।
ಭವಿಷ್ಯಾಣಿ ಚ ಭೂತಾನಿ ಮಾಂ ತು ವೇದ ನ ಕಶ್ಚನ ॥೨೬॥

ವೇದ ಅಹಮ್ ಸಮತೀತಾನಿ ವರ್ತಮಾನಾನಿ ಚ ಅರ್ಜುನ ।
ಭವಿಷ್ಯಾಣಿ ಚ ಭೂತಾನಿ ಮಾಮ್ ತು ವೇದ ನ ಕಶ್ಚನ- ಅರ್ಜುನಾ , ನಾನು ತಿಳಿದಿದ್ದೇನೆ-ಹಿಂದಿದ್ದ ಜೀವಿಗಳನ್ನು, ಈಗಿರುವವರನ್ನು, ಮುಂದೆ ಬರುವವರನ್ನು ಕೂಡಾ. ನನ್ನನ್ನು ಮಾತ್ರ ಯಾರೂ ತಿಳಿದಿಲ್ಲ.

ಜೀವ ಮತ್ತು ಭಗವಂತನ ನಡುವಿನ ವ್ಯತ್ಯಾಸವನ್ನು ಬಹಳ ಸ್ಪಷ್ಟವಾಗಿ ವಿವರಿಸುತ್ತಾ ಕೃಷ್ಣ ಹೇಳುತ್ತಾನೆ "ಹಿಂದೆ ಆಗಿ ಹೋದ ಭೂತಗಳು, ಈಗ ಇರುವ ಭೂತಗಳು, ಮತ್ತು ಮುಂದೆ ಬರಲಿರುವ ಭೂತಗಳು ಈ ಎಲ್ಲವನ್ನೂ ನಾನು ತಿಳಿದಿದಿದ್ದೇನೆ" ಎಂದು. ಇಲ್ಲಿ ಭೂತ ಎನ್ನುವ ಪದಕ್ಕೆ ಅನೇಕ ಅರ್ಥವಿದೆ. ಪಂಚಭೂತಗಳು, ಅದರಿಂದ ನಿರ್ಮಾಣವಾದ ಬ್ರಹ್ಮಾಂಡ, ಅದರಿಂದ ರೂಪುಗೊಂಡ ಸಮಸ್ತ ವಸ್ತುಗಳು ಮತ್ತು ಸಮಸ್ತ ಜೀವಜಾತಗಳು ಎಲ್ಲವೂ ಭೂತಗಳು. ಈ ಹಿಂದೆ ಸೃಷ್ಟಿಯಾದ ಅನಂತ ಬ್ರಹ್ಮಾಂಡ, ಈಗಿರುವ ಬ್ರಹ್ಮಾಂಡ, ಮುಂದೆ ಸೃಷ್ಟಿಯಾಗಲಿರುವ ಅನಂತ ಬ್ರಹ್ಮಾಂಡ, ಹಿಂದೆ ಇದ್ದ ಅನಂತ ಜೀವಜಾತಗಳು, ಈಗಿರುವ ಅನಂತ ಜೀವಜಾತಗಳು ಮತ್ತು ಮುಂದೆ ಸೃಷ್ಟಿಯಾಗಲಿರುವ ಅನಂತ ಜೀವಜಾತಗಳನ್ನು ತಿಳಿದವನು ಆ ಅನಂತಕೋಟಿ ಬ್ರಹ್ಮಾಂಡ ನಾಯಕ ಭಗವಂತನೊಬ್ಬನೆ. ಕೃಷ್ಣ ಹೇಳುತ್ತಾನೆ "ಮಾಮ್ ತು ವೇದ ನ ಕಶ್ಚನ" ಎಂದು. ಅಂದರೆ 'ನನ್ನನ್ನು ಬಿಟ್ಟು ಇನ್ಯಾರೂ ಇದನ್ನು ಪೂರ್ಣವಾಗಿ ತಿಳಿದಿಲ್ಲ' . ಭಗವಂತನನ್ನು ಪೂರ್ಣವಾಗಿ ತಿಳಿದವರಿಲ್ಲ ಹಾಗೂ ತಿಳಿಯುವುದು ಸಾಧ್ಯವಿಲ್ಲ. ಆತ ಸ್ವತಂತ್ರ, ಪೂರ್ಣ ಮತ್ತು ನಿತ್ಯಸತ್ಯ. ಜೀವ ಅಪೂರ್ಣ, ಅಸ್ವತಂತ್ರ ಮತ್ತು ಅನಿತ್ಯಸತ್ಯ.

ಭಗವಂತನನ್ನು ಪೂರ್ಣವಾಗಿ ತಿಳಿಯುವುದು ಅಸಾಧ್ಯ. ಆದರೆ ತಮ್ಮ ಯಥಾಶಕ್ತಿ ಅರಿಯಲು ಎಲ್ಲರಿಗೂ ಏಕೆ ಸಾಧ್ಯವಾಗುವುದಿಲ್ಲ ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಇಚ್ಛಾದ್ವೇಷಸಮುತ್ಥೇನ ದ್ವಂದ್ವಮೋಹೇನ ಭಾರತ ।
ಸರ್ವಭೂತಾನಿ ಸಮ್ಮೋಹಂ ಸರ್ಗೇ ಯಾಂತಿ ಪರಂತಪ ॥೨೭॥

ಇಚ್ಛಾ ದ್ವೇಷ ಸಮುತ್ಥೇನ ದ್ವಂದ್ವ ಮೋಹೇನ ಭಾರತ ।
ಸರ್ವ ಭೂತಾನಿ ಸಮ್ಮೋಹಮ್ ಸರ್ಗೇ ಯಾಂತಿ ಪರಂತಪ-ಓ ಅರಿಗಳನ್ನು ತರಿದವನೇ, ಭರತ ವಂಶದ-ಕುಡಿಯೇ, ಒಲವು-ಹಗೆತನಗಳಿಂದ ಹುಟ್ಟಿದ ಸುಖ-ದುಃಖ ಮುಂತಾದ ದ್ವಂದ್ವಗಳ [ಜೀವೇಶ್ವರರು ಮುಂತಾದ ದ್ವಂದ್ವಗಳ] ತಪ್ಪು ಗ್ರಹಿಕೆಯಿಂದ ಎಲ್ಲಾ ಜೀವಿಗಳೂ ಹುಟ್ಟಿನಿಂದಲೇ ಸುಳ್ಳಿನ ಕೆಟ್ಟದಾರಿ ಹಿಡಿದಿವೆ.

ನಾವು ಹುಟ್ಟುವಾಗಲೇ ಹುಟ್ಟಿನ ಜೊತೆಗೆ 'ಇಚ್ಛಾ-ದ್ವೇಷ' ಸೇರಿಸಿಕೊಂಡು ಹುಟ್ಟುತ್ತೇವೆ. ಶರೀರ ಬೆಳೆದಂತೆ ಅದು ಬೆಳೆಯುತ್ತಾ ಹೋಗುತ್ತದೆ. ಇದರಿಂದ ಇಬ್ಬಂದಿತನ(ದ್ವಂದ್ವ)ದ ಗೊಂದಲ. ಯಾವುದರಿಂದ ಸುಖ, ಯಾವುದರಿಂದ ದುಃಖ ಎಂದು ಗೊತ್ತಿಲ್ಲದೇ ದುಃಖವನ್ನೇ ಸುಖ ಎಂದು ತಿಳಿದು ಅದರ ಬೆನ್ನು ಹತ್ತಿ ಕೊನೆಗೆ ದುಃಖ ಬಂದಾಗ ಅಯ್ಯೋ ಎನ್ನುತ್ತೇವೆ. ಸುಳ್ಳನ್ನೇ ಸತ್ಯ ಎಂದು ನಂಬುವುದು, ಜ್ಞಾನ-ಅಜ್ಞಾನದ ಗೊಂದಲ, ಸತ್ಯ-ಅಸತ್ಯದ ಗೊಂದಲ, ಹೀಗೆ ದ್ವಂದ್ವ ಮೋಹಕ್ಕೆ ಒಳಗಾದವರನ್ನು ತಿದ್ದುವುದು ಬಹಳ ಕಷ್ಟ. ಇದು ಬರಿಯ ಮೋಹ ಮಾತ್ರವಲ್ಲ, ಇದೊಂದು ಸಮ್ಮೋಹ! ನಾನು ತಿಳಿದಿರುವುದೇ ಸರಿ ಎನ್ನುವ ಹಠ, ತನ್ನದೇ ಸರಿ ಎನ್ನುವ ಆಗ್ರಹ. ಇದರಿಂದ ಮನುಷ್ಯ ಸತ್ಯವನ್ನು ಅರಿಯದೆ ಅಜ್ಞಾನಿಯಾಗುತ್ತಾನೆ. ಹೀಗೆ ಅಜ್ಞಾನದಿಂದ ಮೋಹ, ಮೋಹದಿಂದ ಸಮ್ಮೋಹ. ಗೊತ್ತಿಲ್ಲದೇ ಇರುವುದನ್ನು ತಿಳಿದುಕೊಳ್ಳಲು ಪ್ರಯತ್ನಿಸದೇ ಇದ್ದಾಗ ಅದರಿಂದ ವಿಪರೀತ ಜ್ಞಾನ-ನಂತರ ನಾನು ನಂಬಿದ್ದೇ ಸರಿ ಎನ್ನುವ ಆಗ್ರಹ. ಇದು ಸಾಮಾನ್ಯವಾಗಿ ನಾವು ಕಾಣುವ ಮನುಷ್ಯನ ದೌರ್ಬಲ್ಯ. ಈ ಪ್ರಪಂಚದಲ್ಲಿ ಪ್ರತಿಯೊಬ್ಬ ದಡ್ಡನೂ ಕೂಡಾ ತಾನು ಎಲ್ಲರಿಗಿಂತ ಬುದ್ಧಿವಂತ ಎಂದು ತಿಳಿದಿರುತ್ತಾನೆ! ಆದ್ದರಿಂದ ಇಡೀ ಜಗತ್ತಿನ ವ್ಯವಹಾರವನ್ನು ತನ್ನ ಬುದ್ಧಿಯ ಮಾನದಂಡದಿಂದ ಅಳೆದು ದಾರಿತಪ್ಪುತ್ತಾನೆ. ಇದನ್ನು ಮಹಾಭಾರತದಲ್ಲಿ ಹೀಗೆ ಹೇಳಿದ್ದಾರೆ: "ಸರ್ವೋಹಿ ಮನ್ಯತೇ ಲೋಕ ಆತ್ಮಾನಂ ಬುದ್ಧಿಮತ್ತರಂ" ಎಂದು. ತಾನು ಬುದ್ಧಿವಂತ, ನನ್ನ ತೀರ್ಮಾನವೇ ಸರಿ, ಉಳಿದವರಿಗೆ ನನ್ನಷ್ಟು ತಿಳುವಳಿಕೆ ಇಲ್ಲ ಅನ್ನುವ ತಪ್ಪು ಕಲ್ಪನೆಯಿಂದ ಮನುಷ್ಯ ಸಮ್ಮೋಹದತ್ತ ಸಾಗುತ್ತಾನೆ. ಈ ಅಪಾಯದಿಂದ ಯಾರು ಹೇಗೆ ಪಾರಾಗುತ್ತಾರೆ ಎನ್ನುವುದನ್ನು ಮುಂದಿನ ಶ್ಲೋಕ ವಿವರಿಸುತ್ತದೆ.

ಇಲ್ಲಿ ಕೃಷ್ಣ ಅರ್ಜುನನನ್ನು 'ಭಾರತ' ಮತ್ತು 'ಪರಂತಪ' ಎನ್ನುವ ವಿಶೇಷಣಗಳಿಂದ ಸಂಬೋಧಿಸಿದ್ದಾನೆ. ಭಗವಂತನ ಅರಿವು ಪಡೆಯಬೇಕಾದರೆ ನಾವು ಭಾರತ-ಪರಂತಪರಾಗಬೇಕು. ಬೆಳಕಿನ ದಾರಿಯಲ್ಲಿ ರಥನಾಗಿ ಸಾಗಿ(ಭಾರತ), ಪರತತ್ವದ ನಿರಂತರ ಚಿಂತನೆ(ಪರಂತಪ) ಮಾಡಿದಾಗ ಮಾತ್ರ ನಮಗೆ ಭಗವಂತನ ಛಾಯೆ ತಿಳಿದೀತು ಎನ್ನುವುದು ಈ ವಿಶೇಷಣದ ಅರ್ಥವಿಶೇಷ.

ಯೇಷಾಂ ತ್ವಂತಗತಂ ಪಾಪಂ ಜನಾನಾಂ ಪುಣ್ಯಕರ್ಮಣಾಮ್ ।
ತೇ ದ್ವಂದ್ವ ಮೋಹನಿರ್ಮುಕ್ತಾ ಭಜಂತೇ ಮಾಂ ದೃಢವ್ರತಾಃ ॥೨೮॥

ಯೇಷಾಮ್ ತು ಅಂತಗತಮ್ ಪಾಪಮ್ ಜನಾನಾಮ್ ಪುಣ್ಯಕರ್ಮಣಾಮ್ ।
ತೇ ದ್ವಂದ್ವ ಮೋಹ ನಿರ್ಮುಕ್ತಾಃ ಭಜಂತೇ ಮಾಮ್ ದೃಢವ್ರತಾಃ-ಪುಣ್ಯವಂತರಾದ ಯಾವ ಜನರ ಪಾಪ ಕೊನೆಗೊಂಡಿದೆಯೋ ಅವರು ದ್ವಂದ್ವಗಳ ತಪ್ಪರಿವಿನಿಂದ ಕಳಚಿಕೊಂಡು ನಿಷ್ಠೆಯ ನೇಮದಿಂದ ನನ್ನನ್ನು ಸೇವಿಸುತ್ತಾರೆ.

ಹಿಂದಿನ ಶ್ಲೋಕದಲ್ಲಿ ಕೃಷ್ಣ ದ್ವಂದ್ವ ಮೋಹದ ಬಗ್ಗೆ ಹೇಳಿದ. ಇದಕ್ಕೆ ಮೂಲಭೂತವಾಗಿ ಎರಡು ಕಾರಣ. ಒಂದು ಜೀವಸ್ವರೂಪ(ಉದಾ: ದುರ್ಯೋಧನ, ಶಕುನಿ). ಇನ್ನೊಂದು ಪ್ರರಾಬ್ಧ ಕರ್ಮ(ಉದಾ: ಕರ್ಣ, ಅಜಾಮಿಳ, ಪಿಂಗಳೆ). ಜೀವ ಸ್ವರೂಪವೇ ಇಂತಹ ಗತಿಯಲ್ಲಿದ್ದರೆ ಅದಕ್ಕೆ ಯಾವುದೇ ಪರಿಹಾರ ಮಾರ್ಗವಿಲ್ಲ. ಆದರೆ ಯಾವುದೋ ಕಾರಣದಿಂದ ಕೆಟ್ಟ ದಾರಿಯಲ್ಲಿ ಸಾಗುವ ಸಾತ್ವಿಕ ಜೀವಕ್ಕೆ ಜ್ಞಾನದ ಮಾರ್ಗವಿದೆ. ಯಾವುದೋ ಒಂದು ದುರಂತದಿಂದ ಕೆಲವೊಮ್ಮೆ ಅಪರೋಕ್ಷ ಜ್ಞಾನಿಗಳೂ ದಾರಿ ತಪ್ಪುತ್ತಾರೆ. ಇಂತವರ ಪಾಪ ಕರ್ಮ ತೊಳೆದು ಹೋಗುವ ತನಕ ಅವರು ಸರಿ ದಾರಿಗೆ ಬರಲಾಗುವುದಿಲ್ಲ. ಆದರೆ ಕೆಲವೊಮ್ಮೆ ಜೀವನದಲ್ಲಿ ನಡೆಯುವ ಕೆಲವು ದುರಂತ ಅಥವಾ ಆಘಾತ ಇಂತವರನ್ನು ಮರಳಿ ಸತ್ಯದ ಮಾರ್ಗಕ್ಕೆ ಕರೆತರುತ್ತದೆ. ಇಂತಹ ಸಂದರ್ಭದಲ್ಲಿ ಅವರಿಗೆ ತಮ್ಮ ತಪ್ಪಿನ ಅರಿವಾಗಿ ಪಶ್ಚಾತ್ತಾಪ ಭಾವನೆಯಿಂದ ದೇವರಲ್ಲಿ ಅಗಾಧವಾದ ಭಕ್ತಿ ಮೂಡುತ್ತದೆ.

ಪಶ್ಚಾತ್ತಾಪಕ್ಕಿಂತ ಶ್ರೇಷ್ಠವಾದ ಪ್ರಾಯಶ್ಚಿತ್ತ ಇನ್ನೊಂದಿಲ್ಲ. ಎಂತಹ ಪಾತಕವನ್ನೂ ಕೂಡಾ ಪಶ್ಚಾತ್ತಾಪದಿಂದ ತಿದ್ದಿಕೊಳ್ಳಬಹುದು. ನಾವು ನಮ್ಮ ಜೀವನದಲ್ಲಿ ನಮಗೆ ತಿಳಿದೋ ತಿಳಿಯದೆಯೋ ತಪ್ಪು ಮಾಡುತ್ತಿರುತ್ತೇವೆ. ಮಾನಸಿಕವಾಗಿ, ದೈಹಿಕವಾಗಿ, ವಾಚಕವಾಗಿ ನಮಗೆ ತಿಳಿಯದೆಯೇ ನಮ್ಮಿಂದ ತಪ್ಪು ನಡೆಯುತ್ತಿರುತ್ತದೆ. ಆದರೆ ತಪ್ಪಿನ ಅರಿವಾದಾಗ ಹೃದಯದಿಂದ ಮೂಡುವ ಪಶ್ಚಾತ್ತಾಪ ಇಂತಹ ತಪ್ಪಿಗೆ ಪ್ರಾಯಶ್ಚಿತ್ತ. ವೈದಿಕ ಸಂಪ್ರದಾಯದಲ್ಲಿ ದೇವತಾರ್ಚನೆಯ ನಂತರ ನಮಸ್ಕಾರ ಮಾಡುವಾಗ ಹೇಳಿಕೊಳ್ಳುವ ಶ್ಲೋಕ ಒಂದಿದೆ:

ಪಾಪೋಽಹಂ ಪಾಪಕರ್ಮಾಹಂ ಪಾಪಾತ್ಮಾ ಪಾಪಸಂಭವ |
ತ್ರಾಹಿ ಮಾ ಕೃಪಯಾ ದೇವ ಸರ್ವಪಾಪಹರೋ ಭವ ||
ಅನ್ಯಥಾ ಶರಣಂ ನಾಸ್ತಿ ತ್ವಮೇವ ಶರಣಂ ಮಮ |
ತಸ್ಮಾತ್ ಕಾರುಣ್ಯಭಾವೇನ ರಕ್ಷ ಮಾಂ ಜಗದೀಶ್ವರ ||

ಇಲ್ಲಿ ನಾವು ಆ ಭಗವಂತನಲ್ಲಿ "ನಾನು ತಿಳಿದೋ ತಿಳಿಯದೆಯೋ ಮಾಡಿದ ತಪ್ಪನ್ನು ಕ್ಷಮಿಸು" ಎಂದು ಬೇಡುತ್ತೇವೆ. "ನಾನು ಹುಟ್ಟಿನಿಂದ ಪಾಪವನ್ನು ಹೊತ್ತು ಬಂದಿದ್ದೇನೆ, ಅದರಿಂದ ತಪ್ಪು ಮಾಡುತ್ತಿದ್ದೇನೆ, ಆದ್ದರಿಂದ ನನ್ನನ್ನು ಕ್ಷಮಿಸಿ ಈ ಪಾಪದಿಂದ ನನ್ನನ್ನು ಪಾರು ಮಾಡು" ಎಂದು ದೇವರಲ್ಲಿ ಶರಣಾಗುವುದು ಈ ಶ್ಲೋಕದ ಮೂಲಕ ನಾವು ದೇವರಲ್ಲಿ ಮಾಡುವ ಪ್ರಾರ್ಥನೆ. ಇಲ್ಲಿ ಕೃಷ್ಣ ಹೇಳುತ್ತಾನೆ "ತೇ ದ್ವಂದ್ವ ಮೋಹನಿರ್ಮುಕ್ತಾ ಭಜಂತೇ ಮಾಂ ದೃಢವ್ರತಾಃ" ಎಂದು. ಅಂದರೆ ಒಮ್ಮೆ ಇಂತಹ ಪಾಪ ಕರ್ಮದಿಂದ ಆಚೆ ಬಂದರೆ, ಎಲ್ಲಾ ದ್ವಂದ್ವ ಮೋಹಗಳೂ ಪರಿಹಾರವಾಗಿ ಭಗವಂತನಲ್ಲಿ ಗಾಢವಾದ ಭಕ್ತಿ ನೆಲೆ ನಿಲ್ಲುತ್ತದೆ. ಈ ರೀತಿ ಪಾಪದ ಅರಿವಾಗಿ ಪಶ್ಚಾತ್ತಾಪದಿಂದ ಭಗವಂತನೆಡೆಗೆ ತಿರುಗಿದವರು ಬಹಳ ಬೇಗ ಭಗವಂತನ ದಾರಿಯಲ್ಲಿ ಸಾಗುತ್ತಾರೆ.

ಜರಾಮರಣಮೋಕ್ಷಾಯ ಮಾಮಾಶ್ರಿತ್ಯ ಯತಂತಿ ಯೇ ।
ತೇ ಬ್ರಹ್ಮ ತದ್ ವಿದುಃ ಕೃತ್ಸ್ನಮಧ್ಯಾತ್ಮಂ ಕರ್ಮ ಚಾಖಿಲಮ್ ॥೨೯॥

ಜರಾ ಮರಣ ಮೋಕ್ಷಾಯ ಮಾಮ್ ಆಶ್ರಿತ್ಯ ಯತಂತಿ ಯೇ ।
ತೇ ಬ್ರಹ್ಮ ತತ್ ವಿದುಃ ಕೃತ್ಸ್ನಮ್ ಅಧ್ಯಾತ್ಮಮ್ ಕರ್ಮ ಚ ಅಖಿಲಮ್-ಮುಪ್ಪು-ಸಾವುಗಳಿಂದ ಪಾರಾಗಲೆಂದು ನನ್ನನ್ನು ಮೊರೆಹೊಕ್ಕು ಸಾಧನೆಗೆಳಸುವವರು ಆ 'ಬ್ರಹ್ಮತತ್ತ್ವ'ವನ್ನು ತಿಳಿಯಬಲ್ಲರು; ಸಮಗ್ರವಾದ 'ಅಧ್ಯಾತ್ಮ'ವನ್ನು ಮತ್ತು ಎಲ್ಲಾ 'ಕರ್ಮ' ವನ್ನು ಕೂಡಾ.

ಭಗವಂತನೆಡೆಗೆ ತಿರುಗಿದವರು ಮುಪ್ಪು-ಸಾವಿನಿಂದ ಪಾರಾಗುವುದಕ್ಕೋಸ್ಕರ, ಈ ಸಂಸಾರ ಬಂಧದಿಂದ ಬಿಡುಗಡೆ ಬಯಸಿ ಭಗವಂತನ ಮೊರೆ ಹೋಗುತ್ತಾರೆ ಮತ್ತು ಸಾಧನೆ ಮಾಡುತ್ತಾರೆ. ಸಾಮಾನ್ಯವಾಗಿ ಏನನ್ನೂ ಬಯಸದೇ ಇರುವುದು ಶ್ರೇಷ್ಠ, ಆದರೆ ಬಯಸುವುದೇ ಜೀವನ ಧರ್ಮವಾಗಿದ್ದಾಗ ಇನ್ನೇನನ್ನೋ ಬಯಸದೆ ಮೋಕ್ಷವನ್ನು ಬಯಸುವುದು ಶ್ರೇಷ್ಠ. ಈ ಶ್ಲೋಕದಲ್ಲಿ ಕೃಷ್ಣ ಮೋಕ್ಷಕ್ಕೆ ಹೋಗುವ ಸಾಧಕನ ಪ್ರಯತ್ನ ಏನು, ಜ್ಞಾನದ ದಾರಿಯಲ್ಲಿ ಹೇಗೆ ಸಾಗಬೇಕು ಅನ್ನುವ ಅದ್ಭುತ ವಿಚಾರವನ್ನು ವಿವರಿಸುತ್ತಾನೆ.
ಅಧ್ಯಾತ್ಮದಲ್ಲಿ ತಿಳಿದುಕೊಳ್ಳಬೇಕಾದ ಸಂಗತಿ 'ಬ್ರಹ್ಮ' ಎನ್ನುತ್ತಾನೆ ಕೃಷ್ಣ. ಬ್ರಹ್ಮ ಎನ್ನುವ ಪದ 'ಅವ ವೃದ್ಧೋ' ಎನ್ನುವ ಧಾತುವಿನಿಂದ ಬಂದಿದೆ. ಅವತಿ ಎಂದರೆ ಎಲ್ಲಕ್ಕಿಂತ ದೊಡ್ಡದು-ಅದು ಓಂ. ಅಂದರೆ ಅನಾಧಿನಿತ್ಯ, ಸರ್ವ ಗುಣಪೂರ್ಣ, ಸರ್ವಗತ, ಸರ್ವಸಮರ್ಥ ಭಗವಂತ ಬ್ರಹ್ಮ- ಅವನೇ ಓಂ. ಮುಖ್ಯವಾಗಿ ಈ ಶ್ಲೋಕದಲ್ಲಿ "ತೇ ಬ್ರಹ್ಮ ತದ್ ವಿದುಃ" ಅಂದರೆ 'ಎಲ್ಲಾ ಕಡೆ ಇರುವ ಭಗವಂತನನ್ನು ತಿಳಿಯುತ್ತಾರೆ' ಎಂದರ್ಥ. ಭಗವಂತನ ಸರ್ವಗತತ್ವದ ಸಾಕ್ಷಾತ್ಕಾರವೇ ಬ್ರಹ್ಮಸಾಕ್ಷಾತ್ಕಾರ. ಬಿಂಬಸಾಕ್ಷಾತ್ಕಾರ ಅಂದರೆ ನಮ್ಮೊಳಗಿರತಕ್ಕಂತಹ ಅಣೋರಣೀಯವಾಗಿರುವ ಭಗವಂತನ ಸಾಕ್ಷಾತ್ಕಾರ. ಇಂತಹ ಬಿಂಬರೂಪಿ ಭಗವಂತನೇ ಇಡೀ ವಿಶ್ವದಲ್ಲಿ ವ್ಯಾಪ್ತನಾಗಿ ತುಂಬಿದ್ದಾನೆ ಎನ್ನುವುದು ಬ್ರಹ್ಮಸಾಕ್ಷಾತ್ಕಾರ. ಭಗವಂತನ ವ್ಯಾಪ್ತ ರೂಪವನ್ನು ನಾವು ಕಾಣಲು ಸಾಧ್ಯವಿಲ್ಲ. ಆದರೆ ಆ ವ್ಯಾಪ್ತಿಯ ಅರಿವು ಬಹಳ ಮುಖ್ಯ. ಸೌರಶಕ್ತಿಯಲ್ಲಿ ತುಂಬಿ ಇಡೀ ಪ್ರಪಂಚವನ್ನು ಬೆಳಗಿಸುವವನೂ ಅವನೇ, ನನ್ನೊಳಗಿದ್ದು ಬೆಳಗಿಸುವವನೂ ಅವನೇ ಎನ್ನುವ ಅರಿವು ಆತ್ಮ ಸಾಕ್ಷಾತ್ಕಾರ. ಬಲಿಚಕ್ರವರ್ತಿಗೆ ಆದ ಅನುಭವ ಕೂಡಾ ಇದೇ. ನಿಮಗೆ ತಿಳಿದಿರುವಂತೆ ವಾಮನ ರೂಪಿ ಭಗವಂತ, ಮಹಾ ದಾನಿ ಬಲಿಚಕ್ರವರ್ತಿಯಲ್ಲಿ ಮೂರು ಹೆಜ್ಜೆ ಭೂಮಿಯನ್ನು ದಾನವಾಗಿ ಕೇಳುತ್ತಾನೆ. ಶುಕ್ರಾಚಾರ್ಯರ ವಿರೋಧವನ್ನು ಲೆಕ್ಕಿಸದೆ ಬಲಿ ವಾಮನನಿಗೆ ದಾನ ಮಾಡಲು ಮುಂದಾಗುತ್ತಾನೆ. ಆಗ ವಾಮನನು ತನ್ನ ಮೊದಲ ಹೆಜ್ಜೆಯಿಂದ ಭೂಮಿಯನ್ನೂ ಮತ್ತು ಎರಡನೇ ಹೆಜ್ಜೆಯಿಂದ ಆಕಾಶವನ್ನೂ ಆವರಿಸಿದಾಗ , ಮೂರನೇ ಹೆಜ್ಜೆಗೆ ಬಲಿ ತನ್ನ ತಲೆಯನ್ನು ಅರ್ಪಿಸಿ ಪಾತಳವನ್ನು ಸೇರಿ ಉದ್ಧಾರವಾಗುತ್ತಾನೆ. ಈ ಕಥೆಯನ್ನು ನಾವು ಸ್ವಲ್ಪ ಆಳವಾಗಿ ವಿಶ್ಲೇಷಿಸಿದರೆ ಕಥೆಯಲ್ಲಿ ಅಡಗಿರುವ ಸಾರ ತಿಳಿಯುತ್ತದೆ. ಸಂಸಾರ ಸಾಗರದಲ್ಲಿ ಮುಳುಗಿರುವ ನಾವೆಲ್ಲರೂ ಒಂದು ರೀತಿಯಲ್ಲಿ ಬಲಿಗಳು. ಭಗವಂತನ ಸಾಕ್ಷಾತ್ಕಾರವಾಗಲು ನಾವೆಲ್ಲರೂ ಮಾನಸಿಕವಾಗಿ, ಆಧ್ಯಾತ್ಮಿಕವಾಗಿ ಬಲಿಷ್ಟರಾಗಬೇಕು. ಉಪಾಸನೆಯಲ್ಲಿ ಪ್ರಮುಖವಾಗಿ ಮೂರೂ ಹೆಜ್ಜೆಗಳಿವೆ. ಮೊದಲನೆಯದು

ಭಗವಂತನ ಪುಟ್ಟ (ವಾಮನ) ಮೂರ್ತಿಯನ್ನು ದೇವರು ಎಂದು ಆರಾಧಿಸುವುದು. ಎರಡನೇಯದು ಉಪಾಸನೆ ಮಾಡುತ್ತಾ ಮಾಡುತ್ತಾ , ಭಗವಂತ ಕೇವಲ ಮೂರ್ತಿಯಲ್ಲಿ ಅಲ್ಲದೆ, ಇಡೀ ಲೋಕದಲ್ಲಿ ವ್ಯಾಪಿಸಿರುವ ಶಕ್ತಿ ಎಂದು ತಿಳಿಯುವುದು. ಪ್ರಮುಖವಾದ ಮೂರನೇ ಹೆಜ್ಜೆ- ಭಗವಂತ ಸರ್ವಾಂತರ್ಯಾಮಿ, ಆತ ನನ್ನೊಳಗೂ ತುಂಬಿದ್ದಾನೆ ಎಂದು ತಿಳಿದು, ಆ ಪರಶಕ್ತಿಗೆ ತಲೆಬಾಗುವುದು. ಆಗ ನಮಗೆ ನಿಜವಾದ ಭಗವಂತನ ಸಾಕ್ಷಾತ್ಕಾರವಾಗುತ್ತದೆ, ಹಾಗೂ ಭಗವಂತ ನಮ್ಮನ್ನು ಉದ್ಧರಿಸುತ್ತಾನೆ. ಬಲಿ-ಭಗವಂತ ನನ್ನೊಳಗೆ ಅಂತರ್ಯಾಮಿ(ಆತ್ಮನಿ ವೇದನಂ) ಎಂದು ತಿಳಿದು ಭಗವಂತನಿಗೆ ತನ್ನನ್ನು ಅರ್ಪಿಸಿಕೊಂಡ(ಆತ್ಮ ನಿವೇದನಂ)ಅಥವಾ ತನ್ನ ತಲೆಯನ್ನು ಕೊಟ್ಟ. ಇದು ಮೂರು ಹೆಜ್ಜೆಯ ಪರಿಕಲ್ಪನೆ.

ಭಗವಂತ ಸರ್ವಗತ-ಸರ್ವಸಮರ್ಥ, ಅವನು ಎಲ್ಲವುದರ ಒಳಗೂ ಇದ್ದು ಎಲ್ಲವನ್ನೂ ಮಾಡುತ್ತಿದ್ದಾನೆ. ಅವನ ಅಧೀನವಾಗಿರತಕ್ಕ ಪ್ರತಿಬಿಂಬ ಈ ಜೀವ ಎನ್ನುವ ಸತ್ಯ ತಿಳಿದಾಗ ಎಲ್ಲಾ ಕರ್ಮದ ರಹಸ್ಯ ತಿಳಿಯುತ್ತದೆ. ಆದ್ದರಿಂದ ಅಧ್ಯಾತ್ಮದಲ್ಲಿ ತಿಳಿಯಬೇಕಾದ ಮೊದಲ ಮೂರು ವಿಚಾರ ಎಂದರೆ ಭಗವಂತನ ಪ್ರತಿಬಿಂಬವಾದ ಜೀವ, ಪರಿಪೂರ್ಣ ಮತ್ತು ಸರ್ವಸಮರ್ಥನಾದ ಬ್ರಹ್ಮ, ಆ ಅನಂತ ಸಾಮರ್ಥ್ಯದಿಂದ ನಡೆಯುವ ಕರ್ಮ. ಇದೇ ಬ್ರಹ್ಮ-ಕರ್ಮ-ಅಧಿಆತ್ಮ. ಈ ಮೂರು ವಿಚಾರವಲ್ಲದೆ ಇನ್ನೂ ಮೂರು ವಿಷಯಗಳನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಸಾಧಿಭೂತಾಧಿದೈವಂ ಮಾಂ ಸಾಧಿಯಜ್ಞಂ ಚ ಯೇ ವಿದುಃ ।
ಪ್ರಯಾಣಕಾಲೇಽಪಿ ಚ ಮಾಂ ತೇ ವಿದುರ್ಯುಕ್ತಚೇತಸಃ ॥೩೦॥

ಸ ಅಧಿ ಭೂತ ಅಧಿದೈವಮ್ ಮಾಮ್ ಸ ಅಧಿಯಜ್ಞಮ್ ಚ ಯೇ ವಿದುಃ ।
ಪ್ರಯಾಣ ಕಾಲೇ ಅಪಿ ಚ ಮಾಮ್ ತೇ ವಿದುಃ ಯುಕ್ತ ಚೇತಸಃ –ಯಾರು 'ಅಧಿಭೂತ' –'ಅಧಿದೈವ'ದ ಜತೆಗೆ ನನ್ನನ್ನು ತಿಳಿಯುತ್ತಾರೋ ; ತಿಳಿದು ಕೊನೆಯ ಕ್ಷಣದಲ್ಲೂ ನನ್ನನ್ನು ನೆನೆಯುತ್ತಾರೋ, ನನ್ನಲ್ಲೇ ಬಗೆಯಿಟ್ಟ ಅಂತವರು ನನ್ನನ್ನು ಬಲ್ಲವರು.

ಭಗವಂತನ ಅರಿವು ಮೂಡಬೇಕಾದರೆ ಮೊದಲು ಭೌತವಿಜ್ಞಾನ(ಅಧಿಭೂತ)ದ ಅರಿವಿರಬೇಕು. ಪಂಚ ಭೂತಗಳು, ಈ ದೇಹ, ಬ್ರಹ್ಮಾಂಡ, ಪಿಂಡಾಂಡ, ಇಲ್ಲಿರುವ ದ್ರವ್ಯಗಳ ಅರಿವು ಸಾಧನೆಯ ಮೊದಲ ಹೆಜ್ಜೆ. ಅಧಿಭೂತದ ನಂತರ ಅಧಿದೈವದ ಅರಿವು. ನಮ್ಮ ಪಂಚಭೂತಾತ್ಮಕವಾದ ಶರೀರದಲ್ಲಿ 'ನೋಡುವುದು, ಕೇಳುವುದು, ಅನುಭವಿಸುವುದು' ಇತ್ಯಾದಿ ಕ್ರಿಯೆ ನಿಯಮಬದ್ಧವಾಗಿ ಹೇಗೆ ನಡೆಯುತ್ತದೆ? ಜಡದಲ್ಲಿ ಕ್ರಿಯೆ ಇಲ್ಲ, ಬದಲಿಗೆ ಅದರ ಹಿಂದಿರುವ ಅಭಿಮಾನಿ ದೇವತೆಗಳು ಒಂದೊಂದು ಇಂದ್ರಿಯದಲ್ಲಿದ್ದು ಒಂದೊಂದು ಕ್ರಿಯೆಯನ್ನು ನಿಯಂತ್ರಿಸುತ್ತಿದ್ದಾರೆ-ಇದು ಅಧಿದೈವದ ತಿಳುವಳಿಕೆ. ಇಂತಹ ಸಹಸ್ರಾರು ದೇವತೆಗಳನ್ನು ನಿಯಂತ್ರಿಸುವ ಅಧ್ಯಕ್ಷ ಆ ಭಗವಂತ. ಈ ಪ್ರಪಂಚದಲ್ಲಿ ಅಥವಾ ಪಿಂಡಾಂಡದಲ್ಲಿ ನಡೆಯುವ ಪ್ರತಿಯೊಂದು ಕ್ರಿಯೆ ಒಂದು ಯಜ್ಞ. ಆ ಯಜ್ಞವನ್ನು ಅಧ್ಯಕ್ಷನಾಗಿ ನಡೆಸುವವನು ಅಧಿಯಜ್ಞ. ಆತ ಸಮಸ್ತ ದೇವತೆಗಳ ನಿಯಾಮಕನಾದ ಭಗವಂತ.

ಒಟ್ಟಿನಲ್ಲಿ ನಾವು ಆರು ವಿಚಾರವನ್ನು ಸ್ಪಷ್ಟವಾಗಿ ತಿಳಿದುಕೊಳ್ಳಬೇಕು. ೧. ಅಧಿಭೂತ-ಭೌತಿಕ ಪ್ರಪಂಚ.; ೨. ಅಧ್ಯಾತ್ಮ-ಜೀವಾತ್ಮ ; ೩. ಅಧಿದೈವ-ಸಮಸ್ತ ತತ್ತ್ವಾಭಿಮಾನಿ ದೇವತೆಗಳು ; ೪. ಅಧಿಯಜ್ಞ-ಸರ್ವ ನಿಯಾಮಕ ಭಗವಂತ; ೫. ಬ್ರಹ್ಮ ಸಾಕ್ಷಾತ್ಕಾರ -ಅಂತರ್ಯಾಮಿಯಾಗಿರುವ ಬಿಂಬ ರೂಪಿ ಭಗವಂತನೇ ಎಲ್ಲಾ ಕಡೆ ತುಂಬಿದ್ದಾನೆ ಎನ್ನುವ ಅರಿವು; ೬. ಎಲ್ಲಾ ಕರ್ಮಗಳೂ ಆ ಭಗವಂತನ ಅಧೀನವಾಗಿ ನಡೆಯುತ್ತವೆ ಎನ್ನುವ ಸತ್ಯ. ಈ ಆರು ವಿಚಾರಗಳೂ ನಮ್ಮ ಜೀವನದ ಕೊನೆಯ ಕ್ಷಣದಲ್ಲಿ(ದೇಹ ತ್ಯಾಗ ಮಾಡುವಾಗ)ಕೂಡಾ ನಮ್ಮ ಮನದಲ್ಲಿ ಗಾಢವಾಗಿ ನಿಂತಿರಬೇಕು. ನಾವು ದೇಹ ತ್ಯಾಗ ಮಾಡುವಾಗ ನಮ್ಮ ಮನದಲ್ಲಿ ಯಾವುದು ಗಾಢವಾಗಿ ನಿಂತಿರುತ್ತದೋ ಅದು ನಮ್ಮ ಮುಂದಿನ ಜನ್ಮವನ್ನು ನಿರ್ಧರಿಸುತ್ತದೆ. ಇದಕ್ಕಾಗಿ ಜೀವಮಾನದಲ್ಲಿ ಭಗವಂತನ ಅರಿವು ಬಹಳ ಮುಖ್ಯ. "ಸಾಧನೆಯಲ್ಲಿ ಎಂದೂ ಯಾವುದೇ ಮೋಹಕ್ಕೊಳಗಾಗದೆ, ಅಂತ್ಯಕಾಲದಲ್ಲೂ ಸದಾ ಭಗವಂತನನ್ನು ಚಿಂತಿಸುವವನು ನನ್ನನ್ನು ಸೇರುತ್ತಾನೆ" ಎನ್ನುತ್ತಾನೆ ಕೃಷ್ಣ.

ಹೀಗೆ ಈ ಅಧ್ಯಾಯದಲ್ಲಿ ಜ್ಞಾನದ ವೈಭವವನ್ನು ನಮ್ಮ ಮುಂದೆ ತೆರೆದಿಟ್ಟ ಕೃಷ್ಣ, ಮುಂದಿನ ಅಧ್ಯಾಯದಲ್ಲಿ ಅಧಿಭೂತ, ಅಧಿದೈವ, ಅಧ್ಯಾತ್ಮ, ಅಧಿಯಜ್ಞ, ಬ್ರಹ್ಮ, ಕರ್ಮ ಇದರ ವಿಸ್ತಾರವಾದ ವಿವರಣೆಯನ್ನು ವಿವರಿಸುತ್ತಾನೆ.

ಇತಿ ಸಪ್ತಮೋಽಧ್ಯಾಯಃ

ಏಳನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಎಂಟು

ಏಳನೆಯ ಅಧ್ಯಾಯದ ಕೊನೆಯಲ್ಲಿ ಕೃಷ್ಣ ಸಂಕ್ಷಿಪ್ತವಾಗಿ ಆರು ಮಹತ್ವದ ಸಂಗತಿಯನ್ನು ಮನುಷ್ಯ ತಿಳಿದಿರಬೇಕು ಎಂದು ಹೇಳಿದ್ದ. ಅಧಿಭೂತ, ಅಧ್ಯಾತ್ಮ, ಅಧಿದೈವ, ಅಧಿಯಜ್ಞ, ಬ್ರಹ್ಮ, ಕರ್ಮ-ಈ ಆರು ಸಂಗತಿಗಳನ್ನು ತಿಳಿದರೆ ಅದರಿಂದ ಮೇಲಕ್ಕೆ ಏರುವ ಇನ್ನೊಂದು ಮೆಟ್ಟಲಿರುವುದಿಲ್ಲ ಎಂದಿದ್ದ ಕೃಷ್ಣ.
ಅಧಿಭೂತ ಎಂದರೆ ಭೌತಿಕ ಪ್ರಪಂಚ, ಅಧ್ಯಾತ್ಮ ಎಂದರೆ ಜಡದೊಳಗಿರುವ ಚೇತನ, ಅಧಿದೈವ ಎಂದರೆ ಚೇತನವನ್ನು ನಿಯಂತ್ರಿಸುವ ದೇವತೆಗಳು, ಅಧಿಯಜ್ಞ ಎಂದರೆ ದೇವತೆಗಳನ್ನು ನಿಯಂತ್ರಿಸುವ ಭಗವಂತ, ಈ ಅಧಿಯಜ್ಞ ಜಗತ್ತಿನಲ್ಲೆಲ್ಲಾ ತುಂಬಿದ್ದಾನೆ ಎನ್ನುವುದು ಬ್ರಹ್ಮಕಲ್ಪನೆ, ಅವನಿಂದಲೇ ಎಲ್ಲಾ ಕ್ರಿಯೆಗಳೂ ನಡೆಯುತ್ತವೆ-ಆತನೇ ಸೂತ್ರದಾರ. ಈ ಅರಿವು ಸಾವಿನ ಸಮಯದಲ್ಲೂ ಎಚ್ಚರವಾಗಿರಬೇಕು ಆಗ ಆ ಸಾವು ಮಾಂಗಲಿಕ. ಇಷ್ಟು ವಿಚಾರವನ್ನು ನಾವು ಹಿಂದಿನ ಅಧ್ಯಾಯದಲ್ಲಿ ನೋಡಿದ್ದೇವೆ.

ಸೂಕ್ಷ್ಮವಾಗಿ ಏಳನೇ ಅಧ್ಯಾಯದ ಕೊನೆಯ ಎರಡು ಶ್ಲೋಕಗಳನ್ನು ಗಮನಿಸಿದರೆ ಅಲ್ಲಿ ಕೃಷ್ಣ 'ತತ್ ಬ್ರಹ್ಮ'(ಆ ಬ್ರಹ್ಮತತ್ವ) ಎಂದಿದ್ದಾನೆ. ಕೊನೆಯಲ್ಲಿ 'ನನ್ನನ್ನು(ಮಾಂ) ಸೇರುತ್ತಾರೆ' ಎಂದಿದ್ದಾನೆ. ಇಲ್ಲಿ ನಮಗೆ ಕೃಷ್ಣ ಮತ್ತು ಬ್ರಹ್ಮತತ್ವ ಬೇರೆ ಬೇರೆಯೋ ಅನ್ನುವ ಸಂಶಯ ಬರುತ್ತದೆ. ಇನ್ನು ಇಲ್ಲಿ ಕೃಷ್ಣ ಬಳಸಿದ ಪದಗಳನ್ನು ನೋಡಿದಾಗ ಅಲ್ಲಿ ಅನೇಕ ಅರ್ಥವನ್ನು ಕಾಣುತ್ತೇವೆ. ಉದಾಹರಣೆಗೆ ಬ್ರಹ್ಮ ಎನ್ನುವ ಪದಕ್ಕೆ ಸಂಸ್ಕೃತದಲ್ಲಿ ಅನೇಕ ಅರ್ಥವಿದೆ. ಬ್ರಹ್ಮ ಎಂದರೆ ಜೀವ, ಚತುರ್ಮುಖ ಬ್ರಹ್ಮ, ಶ್ರೀತತ್ವ, ಭಗವಂತ, ವೇದಗಳು, ಇತ್ಯಾದಿ. ಅಧ್ಯಾತ್ಮ ಎನ್ನುವಲ್ಲಿ 'ಆತ್ಮ' ಪದಕ್ಕೆ ಶರೀರ, ಮನಸ್ಸು, ಜೀವ, ಪರಮಾತ್ಮ ಇತ್ಯಾದಿ ಅರ್ಥಗಳಿವೆ. 'ಕರ್ಮ' ಎನ್ನುವಲ್ಲಿ ಪ್ರಾರಾಬ್ಧಕರ್ಮ ಮತ್ತು ಕರ್ತವ್ಯಕರ್ಮ ಎನ್ನುವ ಎರಡು ಅರ್ಥ ಕಾಣುತ್ತದೆ. ಅಧಿಭೂತ ಎನ್ನುವಲ್ಲಿ 'ಭೂತ' ಪದಕ್ಕೆ ಜಡ ಹಾಗೂ ಚೇತನ ಎನ್ನುವ ಎರಡು ಅರ್ಥವನ್ನು ಕಾಣಬಹುದು. ಇದೇ ರೀತಿ ಅಧಿದೈವ ಎಂದರೆ ದೈವರಲ್ಲಿ(ದೇವತೆಗಳಲ್ಲಿ) ಅಧಿಕನಾದವನು ಅಧಿದೈವ, ದೇವತೆಗಳಿಗೆ ಸಂಬಂಧಪಟ್ಟಿದ್ದೂ ಕೂಡಾ ಅಧಿದೈವ. ಹೀಗೆ ಈ ಆರೂ ಶಬ್ದಗಳು ಬೇರೆ ಬೇರೆ ಸಂದರ್ಭದಲ್ಲಿ ಬೇರೆ ಬೇರೆ ಆಯಾಮದಲ್ಲಿ ತೆರೆದುಕೊಳ್ಳುವಂತಾದ್ದು. ಹೀಗಿರುವಾಗ ಕೃಷ್ಣ ಹೇಳಿರುವ ಈ ಆರು ಸಂಗತಿಯನ್ನು ಸ್ಪಷ್ಟವಾಗಿ ಅರ್ಥ ಮಾಡಿಕೊಳ್ಳುವುದು ಕಷ್ಟ.

ಕೊನೆಯ ಶ್ಲೋಕದಲ್ಲಿ ಕೃಷ್ಣ ಹೇಳಿದ: "ನಮ್ಮ ಜೀವನ ಪಯಣದ ಕೊನೆಯ ಕ್ಷಣದಲ್ಲಿ ಈ ಅರಿವನ್ನು ಉಳಿಸಿಕೊಂಡಿರಬೇಕು" ಎಂದು. ಅದು ಹೇಗೆ ಸಾಧ್ಯ ? ದೇಹತ್ಯಾಗ ಮಾಡುವಾಗ ಮಾನಸಿಕ ಚಿಂತನೆ ಹೇಗಿರಬೇಕು? ದೇಹತ್ಯಾಗ ನಂತರ ಜೀವ ಯಾವ ಮಾರ್ಗದಲ್ಲಿ ಚಲಿಸುತ್ತದೆ? ಇತ್ಯಾದಿ ಪ್ರಶ್ನೆ ನಮ್ಮನ್ನು ಕಾಡುತ್ತದೆ. ಎಂಟನೇ ಅಧ್ಯಾಯ ನಮ್ಮೆಲ್ಲರ ಪ್ರತಿನಿಧಿ ಅರ್ಜುನ ಈ ನಮ್ಮ ಪ್ರಶ್ನೆಯನ್ನು ಶ್ರೀಕೃಷ್ಣನಲ್ಲಿ ಕೇಳುವುದರೊಂದಿಗೆ ಪ್ರಾರಂಭವಾಗುತ್ತದೆ.

ಅರ್ಜುನ ಉವಾಚ ।
ಕಿಂ ತದ್ ಬ್ರಹ್ಮ ಕಿಮಧ್ಯಾತ್ಮಂ ಕಿಂ ಕರ್ಮ ಪುರುಷೋತ್ತಮ ।
ಅಧಿಭೂತಂ ಚ ಕಿಂ ಪ್ರೋಕ್ತಮಧಿದೈವಂ ಕಿಮುಚ್ಯತೇ ॥೧॥

ಅರ್ಜುನಃ ಉವಾಚ
ಕಿಮ್ ತತ್ ಬ್ರಹ್ಮ ಕಿಮ್ ಅಧ್ಯಾತ್ಮಮ್ ಕಿಮ್ ಕರ್ಮ ಪುರುಷೋತ್ತಮ ।
ಅಧಿಭೂತಮ್ ಚ ಕಿಮ್ ಪ್ರೋಕ್ತಮ್ ಅಧಿದೈವಮ್ ಕಿಮ್ ಉಚ್ಯತೇ -ಅರ್ಜುನ ಕೇಳಿದನು: ಪುರುಷೋತ್ತಮಾ, ಯಾವುದು ಆ 'ಬ್ರಹ್ಮ'? 'ಅಧ್ಯಾತ್ಮ'ವೆಂದರೆ ಏನು? ಏನು 'ಕರ್ಮ'ವೆಂದರೆ? ಯಾವುದನ್ನು 'ಅಧಿಭೂತ'ವೆನ್ನುತ್ತಾರೆ? ಯಾವುದನ್ನು 'ಅಧಿದೈವ'ವೆನ್ನುತ್ತಾರೆ?

ಅರ್ಜುನ ಕೃಷ್ಣನನ್ನು ಕೇಳುತ್ತಾನೆ " ತತ್ ಬ್ರಹ್ಮ(ಆ ಬ್ರಹ್ಮತತ್ವ) ಅಂದರೆ ಯಾವುದು? ಅಧ್ಯಾತ್ಮ ಅಂದರೆ ಏನು? ಮತ್ತು ಕರ್ಮ ಅಂದರೇನು?" ಎಂದು. ಇಲ್ಲಿ ವ್ಯಾಸರು ಅರ್ಜುನನ ಈ ಪ್ರಶ್ನೆಯ ಹಿಂದಿನ ಭಾವನೆಯನ್ನು "ಪುರುಷೋತ್ತಮ" ಎನ್ನುವ ವಿಶೇಷಣದಲ್ಲಿ ಸೆರೆಹಿಡಿದು ನಮ್ಮ ಮುಂದಿಟ್ಟಿದ್ದಾರೆ. ಪುರುಷೋತ್ತಮ ಎಂದರೆ ಕ್ಷರ(ಜೀವ)ವನ್ನು ಮೀರಿನಿಂತವನು. ಅಕ್ಷರ(ಶ್ರೀತತ್ವ)ಕ್ಕಿಂತಲೂ ಹಿರಿಯನು. "ಕ್ಷರ-ಅಕ್ಷರವನ್ನು ಮೀರಿ ನಿಂತ ನೀನೇ ಪುರುಷೋತ್ತಮ, ನೀನಲ್ಲದೆ ನಿನ್ನಿಂದ ಹಿರಿದಾದ ತತ್ವ ಇನ್ನೊಂದಿಲ್ಲ, ಆದ್ದರಿಂದ ನನಗೆ ತಿಳಿದಂತೆ ನೀನೇ ಬ್ರಹ್ಮ. ಇದರ ವಿವರಣೆಯನ್ನು ನಿನ್ನಿಂದ ತಿಳಿಯಬೇಕು" ಎನ್ನುವ ಭಾವವನ್ನು ಅರ್ಜುನ ವ್ಯಕ್ತಪಡಿಸಿದ ಎನ್ನುವುದನ್ನು ತಿಳಿಸುವ ವಿಶೇಷಣ 'ಪುರುಷೋತ್ತಮ'. ಅರ್ಜುನ ಕೇಳುತ್ತಾನೆ "ಯಾವುದನ್ನು ಅಧಿಭೂತವೆನ್ನುತ್ತಾರೆ? ಯಾವುದನ್ನು ಅಧಿದೈವವೆನ್ನುತ್ತಾರೆ?" ಎಂದು.

ಅಧಿಯಜ್ಞಃ ಕಥಂ ಕೋಽತ್ರ ದೇಹೇಽಸ್ಮಿನ್ ಮಧುಸೂದನ ।
ಪ್ರಯಾಣಕಾಲೇ ಚ ಕಥಂ ಜ್ಞೇಯೋಽಸಿ ನಿಯತಾತ್ಮಭಿಃ ॥೨॥

ಅಧಿಯಜ್ಞಃ ಕಥಮ್ ಕಃ ಅತ್ರ ದೇಹೇ ಅಸ್ಮಿನ್ ಮಧುಸೂದನ ।
ಪ್ರಯಾಣ ಕಾಲೇ ಚ ಕಥಮ್ ಜ್ಞೇಯಃ ಅಸಿ ನಿಯತ ಆತ್ಮಭಿಃ –ಮಧುಸೂದನಾ, ಇಲ್ಲಿ ಈ ದೇಹದಲ್ಲಿ 'ಅಧಿಯಜ್ಞ'ಯಾರು? ಮತ್ತು ಹೇಗೆ? ಬಗೆ ಹಿಡಿತದಲ್ಲಿಟ್ಟವರು ಕೊನೆಯ ಕಾಲದಲ್ಲಿ ನಿನ್ನನ್ನು ಹೇಗೆ ನೆನೆಯಬೇಕು?

ಮುಂದುವರಿದು ಅರ್ಜುನ ಕೇಳುತ್ತಾನೆ: "ಅಧಿಯಜ್ಞ ಅಂದರೆ ಯಾರು?" ಎಂದು. ನಮ್ಮ ದೇಹದೊಳಗಿರುವ ಅಧಿಯಜ್ಞ ಯಾರು ಮತ್ತು ಹೇಗೆ? ಅಧಿಯಜ್ಞದ ಅರ್ಥವ್ಯಾಪ್ತಿ ಏನು? ಎನ್ನುವುದು ಅರ್ಜುನನ ಪ್ರಶ್ನೆ. ಇಲ್ಲಿ ಪುನಃ ವ್ಯಾಸರು "ಮಧುಸೂದನ" ಎನ್ನುವ ವಿಶೇಷಣವನ್ನು ಬಳಸಿ ಅರ್ಜುನನ ಪ್ರಶ್ನೆಯ ಭಾವನೆಯನ್ನು ನಮಗೆ ತಿಳಿಸುತ್ತಾರೆ. "ಮಧುಸೂದನ" ಅನ್ನುವ ನಾಮಕ್ಕೆ ಎರಡು ಪ್ರಮುಖ ಅರ್ಥವಿದೆ. 'ಮಧು' ಅಂದರೆ ಆನಂದ(Inner bliss). 'ಸೂದ' ಎಂದರೆ ಸತ್ಕರ್ಮವನ್ನು ಮಾಡುವ ಸಾತ್ವಿಕರು. ಆದ್ದರಿಂದ ಮಧುಸೂದನ

ಎಂದರೆ ಸಾತ್ವಿಕರೊಳಗಿದ್ದು ಅವರಿಗೆ ಆನಂದವನ್ನು ಕೊಡುವವನು ಎಂದರ್ಥ. 'ಸೂದ' ಎಂದರೆ ನಾಶ ಎನ್ನುವ ಇನ್ನೊಂದು ಅರ್ಥವಿದೆ. ಆದ್ದರಿಂದ ದುರ್ಜನರ ಆನಂದವನ್ನು ನಾಶಮಾಡುವವನು ಮಧುಸೂದನ. "ನಮ್ಮೊಳಗೆ ಕೂತು ಆನಂದ ಕೊಡುವವನೂ ನೀನೇ, ದುಃಖ ಕೊಡುವವನೂ ನೀನೇ. ನಮ್ಮೊಳಗಿದ್ದು ಎಲ್ಲಾ ಯಜ್ಞಗಳನ್ನು ನಿಯಂತ್ರಿಸುವವನು ನೀನೆ. ಆದ್ದರಿಂದ ನೀನೇ ಅಧಿಯಜ್ಞ ಎನ್ನುವುದು ನನ್ನ ತಿಳುವಳಿಕೆ. ಇದನ್ನು ನನಗೆ ವಿವರಿಸು" ಎನ್ನುವ ಅರ್ಜುನನ ಭಾವವನ್ನು ಈ ವಿಶೇಷಣದ ಮೂಲಕ ವ್ಯಾಸರು ಇಲ್ಲಿ ವಿವರಿಸಿದ್ದಾರೆ. ಅರ್ಜುನ ಕೇಳುತ್ತಾನೆ "ನಮ್ಮ ಜೀವನದ ಕೊನೆಯ ಶ್ರೇಷ್ಠವಾದ ಯಾತ್ರೆಯಲ್ಲಿ ಜೀವದ ದೇಹ ನಿರ್ಗಮನದ ಅನುಸಂಧಾನ ಮತ್ತು ಹೋಗುವ ವಿವರವನ್ನು ತಿಳಿಸು" ಎಂದು.

ಮೇಲಿನ ಶ್ಲೋಕದಲ್ಲಿ ಉಪಯೋಗಿಸಿದ ಪುರುಷೋತ್ತಮ ಮತ್ತು ಮಧುಸೂದನ ಎನ್ನುವ ಎರಡು ವಿಶೇಷಣದ ಹಿಂದಿನ ಅರ್ಥವನ್ನು ನೋಡಿದಾಗ ನಮಗೆ ಸ್ಪಷ್ಟವಾಗಿ ತಿಳಿಯುತ್ತದೆ-ಅರ್ಜುನನಿಗೆ ಈ ಆರು ಸಂಗತಿಯ (ಪದಗಳ) ನಿಜವಾದ ಅರ್ಥ ತಿಳಿದಿತ್ತು ಎಂದು. ಆದರೂ ಅದರ ವಿವರವನ್ನು ಭಗವಂತನಿಂದ ತಿಳಿದುಕೊಳ್ಳುವ ಉದ್ದೇಶದಿಂದ ಆತ ಈ ಪ್ರಶ್ನೆಯನ್ನು ಕೃಷ್ಣನಲ್ಲಿ ಕೇಳುತ್ತಾನೆ. ಸಾಮಾನ್ಯವಾಗಿ ತಿಳಿದವರು ತಮಗೆ ತಿಳಿದಿದ್ದರೂ ಕೂಡಾ ಇನ್ನೊಬ್ಬರಿಗೆ ತಿಳಿಸುವ ಉದ್ದೇಶದಿಂದ ಈ ರೀತಿ ಪ್ರಶ್ನೆ ಮಾಡುತ್ತಾರೆ. ಇಲ್ಲಿ ಅರ್ಜುನ ತಾನು ತಿಳಿದಿರುವುದನ್ನು ದೃಡೀಕರಿಸಿಕೊಳ್ಳುವುದಕ್ಕೋಸ್ಕರ ಮತ್ತು ಇಡೀ ಮಾನವ ಜನಾಂಗಕ್ಕೆ ಭಗವಂತನ ವಿವರಣೆಯನ್ನು ತಿಳಿಸುವುದಕ್ಕೋಸ್ಕರ ಈ ಪ್ರಶ್ನೆಯನ್ನು ಕೃಷ್ಣನ ಮುಂದಿಟ್ಟಿದ್ದಾನೆ.

ನಮಗೆ ಅನಿಸಬಹುದು "ಯುದ್ಧರಂಗದಲ್ಲಿ ನಿಂತಿರುವ ಅರ್ಜುನ ಏಕೆ ಇಂತಹ ಪ್ರಶ್ನೆಗಳನ್ನು ಕೇಳುತ್ತಿದ್ದಾನೆ? ಇಲ್ಲಿ ಅದರ ಅಗತ್ಯ ಏನಿದೆ?" ಎಂದು. ಸಾಮಾನ್ಯವಾಗಿ ಯುದ್ಧರಂಗದಲ್ಲಿ ನಿಂತವರಿಗೆ ಸಾವು ಕಾಡುವಷ್ಟು ಇನ್ಯಾರನ್ನೂ ಕಾಡುವುದಿಲ್ಲ. ಅವರನ್ನು ಪ್ರತೀಕ್ಷಣ ಸಾವು ನಿರೀಕ್ಷಿಸುತ್ತಿರುತ್ತದೆ. ಅವರು ಸಾವು ಮತ್ತು ಸಾವಿನ ಆಚೆಗಿನ ಸ್ಥಿತಿಯ ಬಗ್ಗೆ ಜಾಗೃತರಾಗಿರುತ್ತಾರೆ. ಸಾವಿನಿಂದಾಚೆಗೆ ಏನು ಎನ್ನುವುದು ಸೈನಿಕರಿಗೆ ಬಹಳ ಮಹತ್ವದ್ದಾಗಿರುತ್ತದೆ. ಈವರೆಗಿನ ಕೃಷ್ಣಾರ್ಜುನ ಸಂವಾದದಲ್ಲಿ ಎಲ್ಲಿಯೂ ಕೃಷ್ಣ ಅರ್ಜುನನಿಗೆ ಗೆಲುವಿನ ಭರವಸೆಯನ್ನು ಕೊಟ್ಟಿಲ್ಲ. ಧರ್ಮದ ಪರ ಹೋರಾಡುವುದು ನಿನ್ನ ಕರ್ತವ್ಯ ಅಂದಿದ್ದಾನೆ ಅಷ್ಟೇ. ಆದ್ದರಿಂದ ಯುದ್ಧರಂಗದಲ್ಲಿರುವ ಅರ್ಜುನನಿಗೆ ಸಾವು ಮತ್ತು ಸಾವಿನಿಂದಾಚೆಗೆ ಏನು ಎನ್ನುವುದು ಬಹಳ ಮುಖ್ಯ ವಿಚಾರ.

ಅರ್ಜುನನ ಪ್ರಶ್ನೆಗೆ ಭಗವಂತನ ಉತ್ತರವೇ ಎಂಟನೆಯ ಅಧ್ಯಾಯದ ಉಳಿದ ಭಾಗ.

ಭಗವಾನುವಾಚ ।
ಅಕ್ಷರಂ ಬ್ರಹ್ಮ ಪರಮಂ ಸ್ವಭಾವೋಽಧ್ಯಾತ್ಮಮುಚ್ಯತೇ ।
ಭೂತಭಾವೋದ್ಭವಕರೋ ವಿಸರ್ಗಃ ಕರ್ಮಸಂಜ್ಞಿತಃ ॥೩॥

ಭಗವಾನ್ ಉವಾಚ - ಭಗವಂತ ಹೇಳಿದನು:

ಅಕ್ಷರಮ್ ಬ್ರಹ್ಮ ಪರಮಮ್ ಸ್ವಭಾವಃ ಅಧ್ಯಾತ್ಮಮ್ ಉಚ್ಯತೇ ।

ಭೂತ ಭಾವ ಉದ್ಭವ ಕರಃ ವಿಸರ್ಗಃ ಕರ್ಮ ಸಂಜ್ಞಿತಃ -- ಪರಮಾಕ್ಷರ ಎನಿಸಿದ ಪರತತ್ವವೇ 'ಬ್ರಹ್ಮ'. ಜೀವಸ್ವರೂಪ ಮತ್ತು ಜೀವಕ್ಕೆ ಸಂಬಂಧಿಸಿದ ಸಮಷ್ಟಿ ಪಿಂಡಾಂಡವನ್ನು [ಭಗವಂತನ ಬಗೆಯ ನಿಲುವನ್ನು]

'ಅಧ್ಯಾತ್ಮ' ಎನ್ನುತ್ತಾರೆ. ಜೀವ-ಜಡಗಳ ಅಭಿವ್ಯಕ್ತಿಗೆ ಕಾರಣವಾದ ಭಗವಂತನ ಬಗೆಬಗೆಯ ಸೃಷ್ಟಿಕ್ರಿಯೆಗೆ 'ಕರ್ಮ' ಎಂದು ಹೆಸರು.

ಕೃಷ್ಣ ಹೇಳುತ್ತಾನೆ 'ಬ್ರಹ್ಮ' ಅಂದರೆ "ಪರಮಂ ಬ್ರಹ್ಮ –ಪರಮಂ ಅಕ್ಷರ' ಎಂದು. ಭಗವಂತ ಎಲ್ಲರಿಗಿಂತ ಹಿರಿದಾದ ಪರಮಮ್ ಬ್ರಹ್ಮ- ಆತ ಪರಮಾಕ್ಷರ. ಅಂತಹ ಭಗವಂತನ ಬಗೆಗೆ ತಿಳಿದುಕೊಳ್ಳಬೇಕು ಎನ್ನುವುದು 'ಬ್ರಹ್ಮ' ಪದದ ಹಿಂದಿನ ಅರ್ಥ. ವಿಷ್ಣು ಸಹಸ್ರನಾಮದಲ್ಲಿ ಭಗವಂತನನ್ನು ಈ ರೀತಿ ವರ್ಣಿಸಿದ್ದಾರೆ:

ಪರಮಂ ಯೋ ಮಹತ್ತೇಜಃ ಪರಮಂ ಯೋ ಮಹತ್ತಪಃ |
ಪರಮಂ ಯೋ ಮಹದ್ಬ್ರಹ್ಮ ಪರಮಂ ಯಃ ಪರಾಯಣಮ್ ||

ಭಗವಂತ ಬೆಳಕುಗಳಿಗೆ ಬೆಳಕು ನೀಡುವ ಸ್ವರೂಪ; ಎಲ್ಲರ ಚಿಂತನೆಯ ಕೊನೆಯ ಗುರಿ; ಎಲ್ಲಾ ಜ್ಞಾನದ ಗಮ್ಯ ಆ ಭಗವಂತ. ಇಲ್ಲಿ ಭಗವಂತನನ್ನು 'ಪರಮ ಮಹಾ ಬ್ರಹ್ಮ' ಎನ್ನುತ್ತಾರೆ. ಬ್ರಹ್ಮ ಎಂದರೆ ಜೀವರು; ಪರಬ್ರಹ್ಮ ಎಂದರೆ ಮುಕ್ತರಾದ ಜೀವರು; ಪರಮಬ್ರಹ್ಮ ಎಂದರೆ ಶ್ರೀತತ್ವ-ನಿತ್ಯ ಮುಕ್ತಳಾದ ಶ್ರೀಲಕ್ಷ್ಮಿ. ಪರಮ ಮಹಾ ಬ್ರಹ್ಮ ಎಂದರೆ ನಾರಾಯಣ. ಭಗವಂತ ಪರಾಯಣರಿಗೂ ಕೂಡಾ ಪರಮ. ಇಲ್ಲಿ ಪರಾಯಣರು ಎಂದರೆ ನಮಗೆ ಆಸರೆಯಾಗಿರುವ ತತ್ತ್ವಾಭಿಮಾನಿ ದೇವತೆಗಳು. ಭಗವಂತ ಸರ್ವ ದೇವತೆಗಳ ಒಡೆಯ. ಇದು ನಾವು ತಿಳಿದುಕೊಳ್ಳಬೇಕಾದ ಆರು ಸಂಗತಿಗಳಲ್ಲಿ ಒಂದಾದ 'ಬ್ರಹ್ಮ' ಪದದ ಅರ್ಥ.

ಮುಂದುವರಿದು ಕೃಷ್ಣ ಹೇಳುತ್ತಾನೆ: "ಸ್ವಭಾವಃ ಅಧ್ಯಾತ್ಮಮ್ ಉಚ್ಯತೇ" ಎಂದು. ಇಲ್ಲಿ ಸ್ವಭಾವ ಎಂದರೆ ತನ್ನತನ. ಜೀವದ ಇರವಿನ ಬಗೆ ಮತ್ತು ಜೀವ ಸ್ವಭಾವ. ನಾವು ಭಗವಂತನನ್ನು ಅರಿಯುವ ಮೊದಲು ನಮ್ಮ ಜೀವ ಸ್ವಭಾವವನ್ನು ಅರಿಯಬೇಕು. ನಾನು ಅಂದರೆ ಏನು? ನನ್ನಲ್ಲಿರುವ ಉತ್ತಮ ಅಂಶ(plus point) ಯಾವುದು? ಕೆಟ್ಟ ಅಂಶ(minus point) ಯಾವುದು ಎಂದು ನಿರಂತರ ನಾವು ನಮ್ಮನ್ನು ತಿಳಿಯಲು ಪ್ರಯತ್ನಿಸಬೇಕು [ಆದರೆ ನಾವು ನಮ್ಮ ಹೆಚ್ಚಿನ ಸಮಯವನ್ನು ಇನ್ನೊಬ್ಬರ ಬಗ್ಗೆ ತೀರ್ಪು ಕೊಡುವುದರಲ್ಲಿ ಕಳೆಯುತ್ತೇವೆ!!!] . ನಮಗೆ ಈ ದೇಹದಲ್ಲಿ ಕಣ್ಣು, ಕೈ, ಕಾಲು ಹಾಗೂ ಇತರ ಅಂಗಾಂಗಗಳನ್ನು ಬಿಟ್ಟು ಒಂದು 'ನಾನು' ಅನ್ನುವ ವಸ್ತುವಿದೆ ಎನ್ನುವ ಅರಿವೇ ಇರುವುದಿಲ್ಲ [awareness of self]. ಮೊದಲು ನಾವು ಜೀವದ ಇರುವಿಕೆಯನ್ನು ತಿಳಿದುಕೊಳ್ಳಬೇಕು. ನಂತರ ಅದರ ಸ್ವಭಾವವೇನು ಎಂದು ತಿಳಿಯಬೇಕು. [ಸಾಮಾನ್ಯವಾಗಿ ನಮಗೆ ನಮ್ಮ ಜೀವ ಸ್ವಭಾವ ಏನು ಎಂದು ತಿಳಿದಿರುವುದಿಲ್ಲ. ನಾವು ಪ್ರಭಾವದಲ್ಲೇ ಬದುಕುತ್ತಿರುತ್ತೇವೆ.]

ಜೀವ ಅನ್ನುವುದು ಅತೀ ಸೂಕ್ಷ್ಮವಾದ ವಸ್ತು. ಅದು ಹೃತ್ಕಮಲ ಮಧ್ಯದಲ್ಲಿ ಅನಾಹತ ಚಕ್ರ(thymus gland)ವೆಂಬ ಶಕ್ತಿ ಕೇಂದ್ರದಲ್ಲಿದೆ. ಈ ಜೀವ ಎನ್ನುವುದು ಕೋಣೆಯಲ್ಲಿ ಹಚ್ಚಿದ ಪುಟ್ಟ ದೀಪದಂತೆ. ದೀಪ ಇಡೀ ಕೋಣೆಯನ್ನು ಬೆಳಗಿಸುವಂತೆ, ಜೀವ ಅತಿ ಸೂಕ್ಷ್ಮವಾದರೂ ಕೂಡಾ ಅದರ ಬೆಳಕು ಇಡೀ ದೇಹವನ್ನು ವ್ಯಾಪಿಸಿರುತ್ತದೆ. ಇಂತಹ ಜೀವ ಮತ್ತು ಜೀವ ಸ್ವಭಾವವೇ 'ಅಧ್ಯಾತ್ಮ'.

ಕೃಷ್ಣ ಮುಂದುವರಿದು ಹೇಳುತ್ತಾನೆ: "ಈ ಪ್ರಪಂಚ ಎಂದರೆ ಭೂತ ಮತ್ತು ಭಾವ-ಅಂದರೆ ಇದು ಜೀವ ಮತ್ತು ಜಡದ ಸೃಷ್ಟಿ" ಎಂದು. ನಾವು ಈ ಜಗತ್ತಿನಲ್ಲಿದ್ದೇವೆ. ಇಂತಹ ಜಗತ್ತು ಹೇಗೆ ಸೃಷ್ಟಿಯಾಯಿತು? ಯಾವಾಗ ಸೃಷ್ಟಿಯಾಯಿತು? ಅದರ ಹಿಂದಿರುವ ಮೂಲದ್ರವ್ಯ ಯಾವುದು? ಅದರ ನಿಮಿತ್ತ ಮತ್ತು ಉಪಧಾನ ಕಾರಣ ಯಾರು? ಜೀವ ದೇಹದಮೂಲಕ ಹುಟ್ಟುವುದು ಏಕೆ? ಎಲ್ಲವನ್ನೂ ವ್ಯವಸ್ಥಿತವಾಗಿ ನಡೆಸುತ್ತಿರುವ ಆ ಮಹಾ ಶಕ್ತಿ

ಯಾವುದು? ಹೀಗೆ ಚಿಂತನೆ ಮಾಡಿದಾಗ ನಮಗೆ ಒಂದು ವಿಷಯ ತಿಳಿಯುತ್ತದೆ-ಅದೇ ಕರ್ಮ ಸಿದ್ಧಾಂತ. ಈ ಜೀವಜಾತವನ್ನು ಮತ್ತು ಜಡಪ್ರಪಂಚವನ್ನು ಸೃಷ್ಟಿ ಮಾಡುವ ಮೂಲ ಶಕ್ತಿ ಆ ಭಗವಂತ. ಅವನ ಕ್ರಿಯೆಯೇ ನಿಜವಾದ ಕ್ರಿಯೆ. ಈ ಪ್ರಪಂಚದ ವೈವಿಧ್ಯಮಯವಾದ ಸೃಷ್ಟಿಯ ಮೂಲವನ್ನು ತಿಳಿದಾಗ ನಿಜವಾದ ಕರ್ಮ ತಿಳಿಯುತ್ತದೆ. ನಾವೆಲ್ಲರೂ ಕೂಡಾ ಭಗವಂತ ಸೃಷ್ಟಿ ಮಾಡಿದ ಗೊಂಬೆಗಳು-ಆತ ಸೂತ್ರದಾರ. ನಮ್ಮ ಕ್ರಿಯೆ ಆ ಸೂತ್ರದಾರನ ನಿಯಮಕ್ಕೆ ಬದ್ಧ. ಇಡೀ ವಿಶ್ವಚಕ್ರ ಭಗವಂತನ ಅಧೀನವಾಗಿ ತಿರುಗುತ್ತಿದೆ. ಭಗವಂತನ ಕ್ರಿಯೆ ಮಹಾಕ್ರಿಯೆ. ನಮ್ಮ ಕ್ರಿಯೆ -ಸುತ್ತುತ್ತಿರುವ ಮಹಾ ಚಕ್ರದ ಮೇಲೆ ಚಲಿಸುತ್ತಿರುವ ಇರುವೆಯಂತೆ. ಇರುವೆ ಯಾವ ದಿಕ್ಕಿಗೆ ಚಲಿಸಿದರೂ ಕೂಡಾ ಅದು ಚಲಿಸುವುದು ಚಕ್ರ ತಿರುಗಿದಂತೇ ಹೊರತು ಇರುವೆ ಚಲಿಸಿದಂತೆ ಚಕ್ರ ತಿರುಗುವುದಿಲ್ಲ. ಅದೇ ರೀತಿ ಪ್ರಪಂಚದ ಗತಿ ನಮ್ಮ ಕ್ರಿಯೆಯ ಮೇಲೆ ನಿರ್ಧಾರವಲ್ಲ. ಅದು ತನ್ನ ಗತಿಗನುಗುಣವಾಗಿ ನಿರಂತರ ನಡೆಯುತ್ತಿರುತ್ತದೆ. ಆದ್ದರಿಂದ 'ನಾನು ಮಾಡಿದೆ' 'ನನ್ನಿಂದಾಯ್ತು' ಎಂದು ಅಹಂಕಾರ ಪಡುವುದರಲ್ಲಿ ಯಾವ ಅರ್ಥವೂ ಇಲ್ಲ. ಹೀಗೆ ಜೀವ ಜಡ ಪ್ರಪಂಚ ಸೃಷ್ಟಿಗೆ ಕಾರಣವಾಗಿರತಕ್ಕಂತಹ ವಿಶಿಷ್ಟವಾದ ಸೃಷ್ಟಿ ಕ್ರಿಯೆಯೇ ನಿಜವಾದ 'ಕರ್ಮ'.

ಈ ಶ್ಲೋಕವನ್ನು ಇನ್ನೊಂದು ಆಯಾಮದಲ್ಲಿ ನೋಡಿದಾಗ ಇದು ಹೊಸ ರೀತಿಯಲ್ಲಿ ತೆರೆದುಕೊಳ್ಳುತ್ತದೆ. ಇಲ್ಲಿ ಜೀವ ಬರುವುದೇ ಇಲ್ಲ. ಎಲ್ಲಾ ಮೂರೂ ಸಂಗತಿಗಳೂ ಭಗವಂತನನ್ನು ಹೇಳುತ್ತವೆ. ಬ್ರಹ್ಮ ಎಂದರೆ 'ಭಗವಂತ' ; ಸ್ವಭಾವ ಅಂದರೆ ಭಗವಂತನ ಸ್ವತಂತ್ರ ಭಾವ. ಆದ್ದರಿಂದ ಭಗವಂತನ ಗುಣ-ಧರ್ಮ ಚಿಂತನೆಯೇ ಅಧ್ಯಾತ್ಮ. ನಮ್ಮಲ್ಲಿ ಕೆಲವರು ಕೇಳುವುದಿದೆ. "ಭಗವಂತನಿಗೆ ಏಕೆ ಈ ಸ್ವಭಾವ ? ಒಬ್ಬರಿಗೆ ಸುಖ, ಒಬ್ಬರಿಗೆ ದುಃಖ, ಒಬ್ಬರಿಗೆ ಬಡತನ, ಒಬ್ಬರಿಗೆ ಸಿರಿತನ, ಒಬ್ಬರು ನರಕಕ್ಕೆ, ಒಬ್ಬರು ಸ್ವರ್ಗಕ್ಕೆ , ಏಕೆ ಈ ತಾರತಮ್ಯ ?" ಎಂದು. ಇದು ಬಾಲಿಷ ಪ್ರಶ್ನೆ. ಇಂತಹ ವಾದದಿಂದಲೇ ನಮ್ಮಲ್ಲಿ ನಾಸ್ತಿಕತೆ ಹುಟ್ಟಿಕೊಂಡಿರುವುದು. ಜೀವ ಅನಾದಿನಿತ್ಯ, ಅದನ್ನು ಭಗವಂತ ಸೃಷ್ಟಿ ಮಾಡುವುದಿಲ್ಲ. ಪ್ರತಿಯೊಂದು ಜೀವಸ್ವರೂಪದ ಗುಣಧರ್ಮ ಸ್ವಭಾವಕ್ಕನುಗುಣವಾಗಿ, ಅರ್ಹತೆಗನುಗುಣವಾಗಿ, ಅವರವರನ್ನು ಸೃಷ್ಟಿ ಮಾಡುವುದು ಭಗವಂತನ ಸ್ವಭಾವ. ಆದ್ದರಿಂದ ಇಲ್ಲಿ ತಾರತಮ್ಯ ಅನ್ನುವ ಪ್ರಶ್ನೆಯೇ ಇಲ್ಲ. ಭಗವಂತನ ಸೃಷ್ಟಿಯ ಹಿಂದಿರುವ ಆತನ ಸ್ವಾತಂತ್ರ್ಯ; ನಿಷ್ಪಕ್ಷಪಾತ; ಯಾವುದೇ ಪ್ರಭಾವಕ್ಕೊಳಗಾಗದಿರುವುದು; ತ್ರಿಗುಣಾತೀತತ್ವ-ಇವು ಭಗವಂತನ ಮೂಲಭೂತ ಸ್ವಭಾವ. ಇದರ ಅರಿವೇ 'ಅಧ್ಯಾತ್ಮ'. ಭಗವಂತನ ಗುಣಧರ್ಮವನ್ನು ತಿಳಿದಾಗ ಅವನ ಸೃಷ್ಟಿ ಏನು ಎಂದು ಅರ್ಥವಾಗುತ್ತದೆ. ಅದೇ ಕರ್ಮ. ಭಗವಂತನ ಕ್ರಿಯೆಯಲ್ಲಿ ಜ್ಞಾನ-ಇಚ್ಛೆ-ಕೃತಿ ಎನ್ನುವ ಮೂರು ಹಂತವಿಲ್ಲ. ಆತ ಇಚ್ಛಿಸುವುದೇ ಕ್ರಿಯೆ. ಇದನ್ನು ತಿಳಿಯುವುದು 'ಕರ್ಮದ ಅರಿವು'. ಹೀಗೆ ಭಗವಂತನ ಸ್ವರೂಪದ, ಗುಣಧರ್ಮದ ಮತ್ತು ಕ್ರಿಯೆಯ ಅರಿವೇ –ಬ್ರಹ್ಮ ಅಧ್ಯಾತ್ಮ ಮತ್ತು ಕರ್ಮ.

ಅಧಿಭೂತಂ ಕ್ಷರೋ ಭಾವಃ ಪುರುಷಶ್ಚಾಧಿದೈವತಮ್ ।
ಅಧಿಯಜ್ಞೋಽಹಮೇವಾತ್ರ ದೇಹೇ ದೇಹಭೃತಾಂ ವರ ॥೪॥

ಅಧಿಭೂತಮ್ ಕ್ಷರಃ ಭಾವಃ ಪುರುಷಃ ಚ ಅಧಿದೈವತಮ್ ।
ಅಧಿಯಜ್ಞಃ ಅಹಮ್ ಏವ ಅತ್ರ ದೇಹೇ ದೇಹಭೃತಾಮ್ ವರ- ಹುಟ್ಟಿ ಸಾಯುವ ಸಮಷ್ಟಿ ಬ್ರಹ್ಮಾಂಡ [ದೇಹೆಂದ್ರಿಯಗಳಿಂದ ಕೂಡಿದ ಜೀವರಾಶಿ] 'ಅಧಿಭೂತ', ಶರೀರದೊಳಗಿದ್ದು ನಿಯಮಿಸುವ ತತ್ತ್ವಾಭಿಮಾನಿ ದೇವತೆಗಳು[ಜಗತ್ತಿನ ಹಿರಿಯ ಚಾಲಕಶಕ್ತಿಯಾಗಿ 'ಪುರುಷ' ಎನಿಸಿದ ಶ್ರೀತತ್ವ ] 'ಅಧಿದೈವ'. ಹಿರಿಯ ಜೀವವೇ, ಈ ದೇಹದಲ್ಲಿ ನಾನೇ 'ಅಧಿಯಜ್ಞ'.

ಹಿಂದಿನ ಶ್ಲೋಕದಲ್ಲಿ ನೋಡಿದಂತೆ ಅಧ್ಯಾತ್ಮ ಎಂದರೆ ಶರೀರದಲ್ಲಿ ಬಂಧಿಯಾಗಿರುವ ಜೀವ. ಈ ಜೀವದ ಭೋಗಕ್ಕಾಗಿ ಸೃಷ್ಟಿಯಾಗಿರತಕ್ಕಂತಹ ಪಂಚಭೂತಾತ್ಮಕವಾದ ಈ ಪ್ರಪಂಚದ ಸಮಸ್ತ ವಿಚಾರಗಳೂ ಅಧಿಭೂತದಲ್ಲಿ ಸೇರಿದೆ. ಪಂಚಭೂತದ ಮೂಲದ್ರವ್ಯ ಮತ್ತು ಪಂಚಭೂತದಿಂದ ನಿರ್ಮಾಣಗೊಂಡ ಪ್ರಪಂಚ ಅಧಿಭೂತ. ಜಡ ಪ್ರಕೃತಿಯಿಂದ ಹಿಡಿದು ಸ್ಥೂಲ ವಿಶ್ವದ ತನಕ ತ್ರಿಗುಣಾತ್ಮಕವಾದ ಎಲ್ಲವೂ 'ಅಧಿಭೂತ'.
ಕೃಷ್ಣ ಹೇಳುತ್ತಾನೆ "ಪುರುಷಶ್ಚಾಧಿದೈವತಮ್" ಎಂದು. ಈ ಶರೀರದೊಳಗಿರುವ ಜೀವಕ್ಕೆ ನೆರವಾಗುವುದಕ್ಕೋಸ್ಕರ ದೇಹದಲ್ಲಿ ಬೇರೆ ಬೇರೆ ಇಂದ್ರಿಯಗಳನ್ನು ನಿಯಂತ್ರಿಸತಕ್ಕಂತಹ ದೇವತೆಗಳಿದ್ದಾರೆ. ಇದು ಅಧಿದೈವತಾ ವಿಜ್ಞಾನ. ಇದು ಒಂದು ಮುಖ. ಇನ್ನೊಂದು ರೀತಿಯಲ್ಲಿ ನೋಡಿದರೆ ಇಲ್ಲಿ ಕೃಷ್ಣ 'ಪುರುಷ' ಎಂದು ಸಂಬೋಧಿಸಿದ್ದಾನೆ. ನಮ್ಮ ದೇಹದಲ್ಲಿ ನಾಲ್ಕು "ಪುರುಷರಿದ್ದಾರೆ'. ಶರೀರಪುರುಷ, ಛಂದಃಪುರುಷ, ವೇದಪುರುಷ ಮತ್ತು ಸಂವತ್ಸರಪುರುಷ. ಈ ದೇಹ ನಿಂತು ನಡೆದಾಡಬೇಕಾದರೆ ದೇಹದಲ್ಲಿ ಶರೀರಪುರುಷನಾದ ಶಿವಶಕ್ತಿ ಬೇಕು. ಮನಸ್ಸು ಯೋಚಿಸಿದ್ದನ್ನು ಸ್ಪಂದನ, ಪರಾಶರ, ಪಶ್ಯಂತಿ, ಮದ್ಯಮ ಮತ್ತು ವೈಖರಿ ರೂಪದಲ್ಲಿ ವಾಕ್ ಶಕ್ತಿ ಯಾಗಿ ಹೊರಹೊಮ್ಮಲು ಛಂದಃಪುರುಷನಾದ ಶೇಷ ಕಾರಣ. ಮನೋಮಯ ಕೋಶದಲ್ಲಿದ್ದು, ವೇದಾಂತದ ಚಿಂತನೆ, ಮನಸ್ಸಿನಲ್ಲಿ ಮನನ ಶಕ್ತಿ ಕೊಡತಕ್ಕವ ವೇದಪುರುಷ ಗರುಡ. ವೇದಪುರುಷ ನಮಗೆ ಅಪೂರ್ವವಾದ ವೈದಿಕ ವಾಙ್ಮಯ ಶಕ್ತಿ ಪ್ರಾಪ್ತವಾಗುವಂತೆ ಮಾಡುತ್ತಾನೆ. ಜೀವದ ಯೋಗ್ಯತೆಯನ್ನು, ಇಡೀ ಜೀವದ ಸ್ವರೂಪವನ್ನು ನಿಯಂತ್ರಣ ಮಾಡುವವ ಜೀವಕಲಾಭಿಮಾನಿ ಚತುರ್ಮುಖಬ್ರಹ್ಮ, ಈತ ಸಂವತ್ಸರಪುರುಷ. [ 'ಸಂ-ವತ್ಸ-ರ'- ಅಂದರೆ ಚೆನ್ನಾಗಿ ಮಕ್ಕಳನ್ನು ಸಾಕುವ ಪಿತಾಮಹ]. ಬ್ರಹ್ಮ-ವಾಯು ಜೀವನನ್ನು ಮೇಲಕ್ಕೆತ್ತಿ ಸಾಧನೆಯ ಹಾದಿಯಲ್ಲಿ ತೊಡಗಿಸುತ್ತಾರೆ. ಹೀಗೆ ಈ ಪಂಚದೇವತೆಗಳು ಭಗವಂತನ ನಂತರ ದೇಹದಲ್ಲಿರುವ ಪ್ರಮುಖ ಅಧಿದೇವತೆಗಳು. ಅವರಿಂದ ನಿಯಂತ್ರಿಸಲ್ಪಟ್ಟ ಸಮಸ್ತ ಬ್ರಹ್ಮಾಂಡ ಅಧಿಭೂತ.
ಕೃಷ್ಣ ಮುಂದುವರಿದು ಹೇಳುತ್ತಾನೆ: ಪ್ರತಿಯೊಂದು ದೇಹದ ಒಳಗೂ ನಾನು ಒಂದೊಂದು ರೂಪದಲ್ಲಿದ್ದೇನೆ ಎಂದು. ಭಗವಂತನ ಈ ರೂಪವೇ 'ಅಧಿಯಜ್ಞ' ರೂಪ. ಯಜ್ಞವನ್ನು ಅಧಿಕರಿಸಿ, ಅದನ್ನು ನಿಯಂತ್ರಿಸುವ ಯಜ್ಞ ಭೋಕ್ತಾರ, ಯಜ್ಞವನ್ನು ಮಾಡುವವ, ಮಾಡಿಸುವವ, ಮತ್ತು ಫಲಪ್ರದನಾದ ಭಗವಂತ ಅಧಿಯಜ್ಞ. ನಾವು ಭಗವಂತನ ಪೂಜಾರೂಪ ಎಂದು ತಿಳಿದು ಮಾಡುವ ಎಲ್ಲಾ ಕರ್ಮವೂ ಯಜ್ಞ. 'ಯಜ ದೇವಾ ಪೂಜಾಯಾಂ' – ನಮ್ಮ ಬದುಕಿನ ಪ್ರತಿಯೊಂದು ಕ್ರಿಯೆಯೂ ಭಗವಂತನ ಆರಾಧನೆ. ನಮ್ಮ ದೇಹದೊಳಗಿದ್ದು, ಸಕಲ ತತ್ತ್ವಾಭಿಮಾನಿ ದೇವತೆಗಳ ಮುಖೇನ ಕ್ರಿಯೆ ಮಾಡಿಸುವ ಭಗವಂತ 'ಅಧಿಯಜ್ಞ'.

ಎರಡನೇ ಆಯಾಮದಲ್ಲಿ ಈ ಶ್ಲೋಕವನ್ನು ನೋಡಿದರೆ [ಹಿಂದಿನ ಶ್ಲೋಕದಲ್ಲಿ ಭಗವಂತ-ಭಗವಂತನ ಸ್ವಭಾವ ಮತ್ತು ಅವನ ಕ್ರಿಯೆ ಎನ್ನುವ ಅರ್ಥ ವಿಶ್ಲೇಷಣೆಯಂತೆ] ಅಧಿಭೂತ ಎಂದರೆ ಬ್ರಹ್ಮಾದಿಸಮಸ್ತ ದೇವತೆಗಳು. ಚೇತನಾಚೇತನಾತ್ಮಕ ಪ್ರಪಂಚ, ಜೀವರು, ಶರೀರ, ಬ್ರಹ್ಮ ಮತ್ತು ಬ್ರಹ್ಮಾಂಡ ಎಲ್ಲವೂ ಅಧಿಭೂತ. ಎಲ್ಲಾ ದೇವತೆಗಳಿಗೂ ಮಿಗಿಲಾದ ಭಗವಂತನ ಅನಂತರ ಬ್ರಹ್ಮಾದಿ ದೇವತೆಗಳಿಗೂ ತಾಯಿಯಾದ 'ಶಕ್ತಿ' ಶ್ರೀತತ್ವ ಅಧಿದೈವ. ಎಲ್ಲೆಡೆ ತುಂಬಿದ್ದು ಎಲ್ಲಾ ಜೀವರ ಒಳಗೆ ಅಂತರ್ಯಾಮಿಯಾಗಿ ನಿಂತು ನಿಯಮಿಸುವ ಭಗವಂತ ಅಧಿಯಜ್ಞ.

ಅಂತಕಾಲೇ ಚ ಮಾಮೇವ ಸ್ಮರನ್ ಮುಕ್ತ್ವಾ ಕಳೇಬರಮ್ ।
ಯಃ ಪ್ರಯಾತಿ ಸ ಮದ್ಭಾವಂ ಯಾತಿ ನಾಸ್ತ್ಯತ್ರ ಸಂಶಯಃ ॥೫॥

ಅಂತಕಾಲೇ ಚ ಮಾಮ್ ಏವ ಸ್ಮರನ್ ಮುಕ್ತ್ವಾ ಕಳೇಬರಮ್ ।
ಯಃ ಪ್ರಯಾತಿ ಸಃ ಮತ್ ಭಾವಮ್ ಯಾತಿ ನ ಅಸ್ತಿ ಅತ್ರ ಸಂಶಯಃ –ಕೊನೆಯ ಕಾಲದಲ್ಲೂ ನನ್ನನ್ನೇ ನೆನೆಯುತ್ತಾ ದೇಹವನ್ನು ತೊರೆದು ತೆರಳುವವನು ನನ್ನಂತಯೇ ದುಃಖವಿರದ ಸುಖದ ನಿಜಸ್ಥಿತಿಯನ್ನು [ನನ್ನಲ್ಲೇ ಇರವನ್ನು] ಪಡೆಯುತ್ತಾನೆ.

ಅರ್ಜುನನ ಕೊನೆಯ ಪ್ರಶ್ನೆಗೆ ಕೃಷ್ಣ ಉತ್ತರಿಸುತ್ತಾ ಹೇಳುತ್ತಾನೆ: "ಸಾಯುವ ಕ್ಷಣದಲ್ಲೂ ಕೂಡಾ ನನ್ನನ್ನೇ ನೆನೆಯುತ್ತಾ ದೇಹವನ್ನು ತೊರೆಯುವ ಜೀವರು ನನ್ನ ಹಾಗೇ ಜ್ಞಾನಾನಂದ ಸ್ವರೂಪರಾಗಿ ನನ್ನಲ್ಲಿ ಬಂದು ನೆಲೆಸುತ್ತಾರೆ. ಅವರು ಮುಂದೆಂದೂ ಈ ಅಜ್ಞಾನ ಮತ್ತು ದುಃಖಮಯವಾದ ಸಂಸಾರದ ತೊಳಲಾಟಕ್ಕೆ ಒಳಗಾಗುವುದಿಲ್ಲ. ಈ ಬಗ್ಗೆ ಎಂದೂ ಸಂಶಯ ಪಡಬೇಡ" ಎಂದು. ಇಲ್ಲಿ "ಅಂತಕಾಲೇ" ಎಂದರೆ ಮುಪ್ಪಿನ ಕಾಲದಲ್ಲಿ ಎನ್ನುವ ಅರ್ಥವಲ್ಲ, ಬದಲಿಗೆ ದೇಹವನ್ನು ಜೀವ ಬಿಡುವ ಕೊನೆಯ ಕ್ಷಣ ಎಂದರ್ಥ. ದೇಹವನ್ನು ಬಿಡುತ್ತಾ ಭಗವಂತನನ್ನು ಸ್ಮರಿಸುತ್ತಾ ಹೊರಗೆ ಹೋಗುವ ಚೇತನಕ್ಕೆ ಅಗಾಧವಾದ ಬೆಳಕು ಕಾಣಿಸುತ್ತದೆ ಮತ್ತು ಆ ಚೇತನ ಮೋಕ್ಷವನ್ನು ಸೇರುತ್ತದೆ. [ಜೀವ ಶರೀರವನ್ನು ಬಿಡುವ ಮತ್ತು ದೇಹದಿಂದ ಹೊರ ಬಂದ ಮೇಲೆ ಜೀವದ ಪ್ರಯಾಣದ ಕುರಿತು ಸತ್ತು ಬದುಕಿದ ಅನೇಕ ಜನರ ಅನುಭವವನ್ನು ಸಂಗ್ರಹಿಸಿ **Raymond Moody** ಬರೆದ **"Life after Life"** ಎನ್ನುವ ಪುಸ್ತಕ ಬೆಳಕು ಚೆಲ್ಲುತ್ತದೆ].

ಯಂ ಯಂ ವಾಽಪಿ ಸ್ಮರನ್ ಭಾವಂ ತ್ಯಜತ್ಯಂತೇ ಕಳೇಬರಮ್ ।
ತಂತಮೇವೈತಿ ಕೌಂತೇಯ ಸದಾ ತದ್ ಭಾವಭಾವಿತಃ ॥೬॥

ಯಮ್ ಯಮ್ ವಾ ಅಪಿ ಸ್ಮರನ್ ಭಾವಮ್ ತ್ಯಜತಿ ಅಂತೇ ಕಳೇಬರಮ್ ।
ತಮ್ ತಮ್ ಏವ ಏತಿ ಕೌಂತೇಯ ಸದಾ ತತ್ ಭಾವ ಭಾವಿತಃ -- ಕೌಂತೇಯಾ, ಕೊನೆಯಲ್ಲಿ ಯಾವ ಯಾವ ವಿಷಯವನ್ನು ನೆನೆಯುತ್ತಾ ದೇಹವನ್ನು ತೊರೆಯುತ್ತಾನೇ ಅದರಲ್ಲೇ ಅನುಗಾಲ ಬೇರೂರಿದ ಸಂಸ್ಕಾರದಿಂದ ಅದನ್ನೆ ಪಡೆಯುತ್ತಾನೆ.

"ಜೀವನ ಯಾತ್ರೆಯ ಅಂತಿಮ ಕ್ಷಣದಲ್ಲಿ ಭಗವಂತನನ್ನು ನೆನೆದವರು 'ನನ್ನನ್ನು' ಸೇರುತ್ತಾರೆ" ಎಂದು ಕೃಷ್ಣ ಏಕೆ ಹೇಳಿದ ಎನ್ನುವುದಕ್ಕೆ ಈ ಶ್ಲೋಕದಲ್ಲಿ ಉತ್ತರವಿದೆ. ಇಲ್ಲಿ ಕೃಷ್ಣ ಮರಣ ಕಾಲದ ಒಂದು ಅದ್ಭುತ ಮನಃಶಾಸ್ತ್ರವನ್ನು ನಮ್ಮ ಮುಂದೆ ತೆರೆದಿಡುತ್ತಾನೆ. ಸಾಯುವ ಕ್ಷಣದಲ್ಲಿ ಭಗವಂತನ ಧ್ಯಾನ ಮಾಡಲು ಒಂದು ಉದ್ದೇಶವಿದೆ ಎನ್ನುತ್ತಾನೆ ಕೃಷ್ಣ. ನಾವು ದೇಹ ತ್ಯಾಗ ಮಾಡುವಾಗ ಏನನ್ನು ಸ್ಮರಣೆ ಮಾಡುತ್ತೇವೋ ಮುಂದಿನ ಜನ್ಮದಲ್ಲಿ ಅದನ್ನೇ ಪಡೆಯುತ್ತೇವೆ. ಆದ್ದರಿಂದ ಆ ಕಾಲದಲ್ಲಿ ಭಗವಂತನನ್ನು ಸ್ಮರಿಸಿದರೆ ಭಗವಂತನನ್ನು ಸೇರುತ್ತೇವೆ. ಸಾವಿನ ಕೊನೇ ಕ್ಷಣದಲ್ಲಿ ಬರುವ ಚಿಂತನೆ ಮುಂದಿನ ಜನ್ಮದ ನಿರ್ಣಾಯಕ ಸಂಗತಿ. ಹಾಗಾಗಿ ಮುಂದಿನ ಜನ್ಮದಲ್ಲಿ ಆತ ಏನಾಗಬೇಕೋ ಅದೇ ನೆನಪಾಗುತ್ತದೆ! ಭಗವಂತನನ್ನು ಸೇರುವ ಯೋಗ ಇಲ್ಲದವರಿಗೆ ಭಗವಂತನ ನೆನಪು ಬರುವುದೇ ಇಲ್ಲ! ಇದಕ್ಕೆ ಶಾಸ್ತ್ರದಲ್ಲಿ ಅನೇಕ ದೃಷ್ಟಾಂತಗಳಿವೆ. ಈ ದೇಶಕ್ಕೆ 'ಭಾರತ' ಎಂದು ಹೆಸರು ಬರಲು ಕಾರಣನಾದ ವೃಷಭದೇವನ ಮಗ ಭರತನ ಕಥೆ ಈ ವಿಚಾರವನ್ನು ಸ್ಪಷ್ಟವಾಗಿ ಹೇಳುವ ಕಥೆ. (ಈ ಭರತ ದುಷ್ಯಂತನ ಮಗ ಭರತನಲ್ಲ, ದುಷ್ಯಂತನ ಮಗ ಭರತ 'ಭರತವಂಶ' ದ ಮೂಲ ಪುರುಷ). ಪರಮ ಧಾರ್ಮಿಕನಾದ ಭರತ ತನ್ನ ಮಗ ಪ್ರಾಯ ಪ್ರಬುದ್ಧನಾದ ಮೇಲೆ ತನ್ನೆಲ್ಲಾ ಅಧಿಕಾರವನ್ನು ಅವನಿಗೊಪ್ಪಿಸಿ, ವಾನಪ್ರಸ್ಥಾಶ್ರಮವನ್ನು ಸ್ವೀಕರಿಸಿ ಕಾಡಿನಲ್ಲಿ ಋಷಿಗಳ ಜೊತೆಗೆ ಸದಾ ಭಗವದ್ ನಿಷ್ಠನಾಗಿ ಬದುಕುತ್ತಿದ್ದ. ಒಂದು ದಿನ ಆತನಿಗೆ ಕಾಡಿನಲ್ಲಿ ತಾಯಿ ಸತ್ತ ಒಂದು ಜಿಂಕೆ ಮರಿ ಸಿಕ್ಕಿತು. ಭರತ ಆ ಮರಿಯನ್ನು ತಂದು ಪಾಲನೆ ಪೋಷಣೆ ಮಾಡತೊಡಗಿದ. ಇದರಿಂದ ಆತ ಸದಾ ಆ ಜಿಂಕೆಯನ್ನೇ ಪೋಷಣೆ ಮಾಡುವುದರಲ್ಲಿ ತನ್ನ ಸಮಯವನ್ನು ಕಳೆಯಲಾರಂಭಿಸಿದ. ಇದರಿಂದ ಆತನ ಸಾಧನೆಗೆ ಚ್ಯುತಿ ಬಂತು. ಆ ಜಿಂಕೆಯ ಮರಿ ಬೆಳೆದು ದೊಡ್ಡದಾಗುವ ಮೊದಲೇ ಆತ ಪ್ರಾಣತ್ಯಾಗ ಮಾಡುವ ಪ್ರಸಂಗ ಬಂತು. ಆ ಕಾಲದಲ್ಲಿ ಭರತನಿಗೆ ಭಗವಂತನ ಚಿಂತನೆಯ ಬದಲು ಕಾಡಿದ್ದು ಆ ಜಿಂಕೆ ಮರಿಯ ಚಿಂತೆ! ಇದರಿಂದ ಆತ ತನ್ನ ಮುಂದಿನ ಜನ್ಮದಲ್ಲಿ ಜಿಂಕೆಯಾಗಿ ಹುಟ್ಟಿದ. ಆದ್ದರಿಂದ ಎಂತಹ ಅಪರೋಕ್ಷ ಜ್ಞಾನಿಯನ್ನೂ ಕೂಡಾ ಪ್ರರಾಬ್ಧ ಬಿಡದು ಎನ್ನುವುದಕ್ಕೆ ಇದು ಶ್ರೇಷ್ಠ ಉದಾಹರಣೆ. ಈ ಕಥೆ ಕೃಷ್ಣ ಇಲ್ಲಿ ಹೇಳುವ ವಿಚಾರಕ್ಕೆ ಜ್ವಲಂತ ದೃಷ್ಟಾಂತ.

ನಾವು ಜೀವನ ಪರ್ಯಂತ ಸಾಧನೆ ಮಾಡಿದರೂ ಕೂಡಾ, ಸಾಯುವ ಕ್ಷಣದಲ್ಲಿ ಭಗವಂತನ ನೆನಪು ಬಾರದೇ ಹೋಗಬಹುದು. ಇದಕ್ಕಾಗಿ ಜೀವನ ಪರ್ಯಂತ ಅಥವಾ ಅನೇಕ ಜನ್ಮಗಳ ಸಾಧನೆ ಅಗತ್ಯ. ಕೃಷ್ಣ ಹೇಳುತ್ತಾನೆ "ಸದಾ ತದ್ ಭಾವಭಾವಿತಃ" ಎಂದು. ಇಲ್ಲಿ ಭಾವ ಎಂದರೆ ತನ್ಮಯತೆ. ಯಾವಾಗಲೂ ಭಗವಂತನಲ್ಲೇ ತನ್ಮಯವಾದ ಮನಸ್ಸಿನಿಂದ ನಿರಂತರ ಭಗವಂತನ ಚಿಂತನೆ ಮಾಡಬೇಕು. ಅಂತ್ಯ ಕಾಲದಲ್ಲಿ ಭಗವಂತನ ನೆನಪು ಬರಬೇಕಾದರೆ, ನಿರಂತರ ಭಗವಂತನಲ್ಲಿ ಮನಸ್ಸನ್ನು ನೆಲೆಗೊಳಿಸುವ ಸಂಸ್ಕಾರ ಬೇಕು. ಇದನ್ನು ಬಿಟ್ಟು ಮರಣ ಕಾಲದಲ್ಲಿ ಭಗವಂತನನ್ನು ನೆನೆದರಾಯ್ತು ಎಂದು ಜೀವನವನ್ನು ವ್ಯರ್ಥವಾಗಿ ಕಳೆದರೆ ಮರಣ ಕಾಲದಲ್ಲಿ ಭಗವಂತನ ನೆನಪು ಬರುವುದೇ ಇಲ್ಲ!

ಭೀಷ್ಮಾಚಾರ್ಯರಿಗೆ ಕೊನೆಗಾಲದಲ್ಲಿ ಎಷ್ಟೇ ಭಗವಂತನ ಬಗ್ಗೆ ಯೋಚಿಸಿದರೂ ಕೂಡಾ ಕಂಡಿದ್ದು ತನ್ನದೇ ಬಾಣದಿಂದ ಗಾಯಗೊಂಡು ನೆತ್ತರು ಸುರಿಸುತ್ತಿರುವ ಕೃಷ್ಣ! ಆನಂದಸ್ವರೂಪ ಭಗವಂತನ ನಿಜ ದರ್ಶನ ಅವರಿಗಾಗಲಿಲ್ಲ. ಇಲ್ಲಿ ನಾವು ಅರಿಯಬೇಕಾದ ವಿಚಾರವೇನೆಂದರೆ-ನಾವು ಯಾವುದೇ ಕೆಟ್ಟ ಸಂಗತಿಯನ್ನು ಗಾಢವಾಗಿ ಮನಸ್ಸಿಗೆ ಹಚ್ಚಿಕೊಳ್ಳಬಾರದು. ಹಚ್ಚಿಕೊಂಡರೆ ಕೊನೆಗಾಲದಲ್ಲಿ ಅದೇ ಕಾಣುತ್ತದೆ! ಇಡೀ ಜೀವನದಲ್ಲಿ ನಾವು ಯಾವತ್ತೂ ಕೆಟ್ಟದ್ದನ್ನು ಯೋಚಿಸಬಾರದು. ಯಾರನ್ನೂ ಕೆಟ್ಟವರೆಂದು ದ್ವೇಷಿಸಬಾರದು. ಒಬ್ಬರನ್ನು

ದ್ವೇಷಿಸುವುದು ತುಂಬಾ ಕೆಟ್ಟದ್ದು. ಅದು ನಮ್ಮ ಇಡೀ ಬದುಕನ್ನೇ ಹಾಳುಮಾಡುತ್ತದೆ. ದುಷ್ಟರಿಂದ ದೂರವಿರು ಆದರೆ ದ್ವೇಷಿಸಬೇಡ. ಒಬ್ಬರನ್ನು ದ್ವೇಷಿಸುವುದು, ನಿಂದಿಸುವುದು, ಅದನ್ನು ಗಾಢವಾಗಿ ಹಚ್ಚಿಕೊಳ್ಳುವುದರಿಂದ ಅವರಿಗೆ ಏನೂ ಬಾಧಕವಿಲ್ಲ. ಆದರೆ ನಮ್ಮ ಬದುಕನ್ನು ನಾವು ಹಾಳು ಮಾಡಿಕೊಳ್ಳುತ್ತೇವೆ. ನಾವು ದ್ವೇಷಿಸುವ ವಸ್ತು ನಮ್ಮ ತಲೆಯಲ್ಲಿ ಗಾಢವಾಗಿ ನೆಲೆ ನಿಲ್ಲುತ್ತದೆ ಮತ್ತು ನಮ್ಮನ್ನು ಅಧಃಪಾತಕ್ಕೆ ಕೊಂಡೊಯ್ಯುತ್ತದೆ. ಅದು ಸಾವಿನ ಕಾಲದಲ್ಲಿ ಕೊನೆಗೆ ತಲೆಎತ್ತಿ ಹೆಡೆ ಅರಳಿಸುತ್ತದೆ! ಆದ್ದರಿಂದ ನಾವು ಈ ವಿಚಾರದಲ್ಲಿ ಎಚ್ಚರವಾಗಿರಬೇಕು. ಯಾರನ್ನಾದರು ಟೀಕೆ ಮಾಡಲು ನಾವು ಅರ್ಹರಲ್ಲ. ಏಕೆಂದರೆ ನಮಗೆ ಅಂತರಂಗ ದರ್ಶನವಿಲ್ಲ. ನಾವು ಮಾತನಾಡುವುದು ಕೇವಲ ಹೊರ ನೋಟದಿಂದ. ಒಳಗೆ 'ಯಾರು ಏನು' ಎಂದು ನೋಡುವ ಶಕ್ತಿ ನಮಗಿಲ್ಲ. ಆದ್ದರಿಂದ ಇನ್ನೊಬ್ಬರ ಚಿಂತನೆ ಬಿಟ್ಟು ಸದಾ ಭಗವಂತನ ಚಿಂತನೆ ಮಾಡು ಎನ್ನುತ್ತಾನೆ ಕೃಷ್ಣ. ನಾವು ಚಿಂತಿಸಬೇಕಾದ ಏಕಮಾತ್ರ ವಸ್ತು ಕೇವಲ ಭಗವಂತ.

ತಸ್ಮಾತ್ ಸರ್ವೇಷು ಕಾಲೇಷು ಮಾಮನುಸ್ಮರ ಯುಧ್ಯ ಚ ।
ಮಯ್ಯರ್ಪಿತಮನೋಬುದ್ಧಿರ್ಮಾಮೇವೈಷ್ಯಸ್ಯಸಂಶಯಮ್ ॥೭॥

ತಸ್ಮಾತ್ ಸರ್ವೇಷು ಕಾಲೇಷು ಮಾಮ್ ಅನುಸ್ಮರ ಯುಧ್ಯ ಚ ।
ಮಯಿ ಅರ್ಪಿತ ಮನಃ ಬುದ್ಧಿಃ ಮಾಮ್ ಏವ ಏಷ್ಯಸಿ ಅಸಂಶಯಃ –ಆದ್ದರಿಂದ ಎಲ್ಲಾ ಕಾಲದಲ್ಲೂ ನನ್ನನ್ನು ನೆನೆ. ನೆನೆಯುತ್ತಾ ಹೋರಾಡು. ನಿನ್ನೆಲ್ಲಾ ಬಯಕೆ ನಿರ್ಧಾರಗಳು ನನ್ನ ಕುರಿತಾದಾಗ ನಿಶ್ಚಯವಾಗಿ ನನ್ನನ್ನೇ ಸೇರುವೆ.

ದೇವರನ್ನು ಸ್ಮರಣೆ ಮಾಡುವ ಕಾಲ ಅಂತ ಒಂದಿಲ್ಲ. ಕೃಷ್ಣ ಹೇಳುತ್ತಾನೆ "ಸರ್ವ ಕಾಲದಲ್ಲೂ ನನ್ನನ್ನು ಸ್ಮರಣೆ ಮಾಡು" ಎಂದು. ಪ್ರತಿಯೊಂದು ಕ್ರಿಯೆ ಮಾಡುವಾಗ ಆ ಕ್ರಿಯೆ ಮಾಡಿಸುತ್ತಿರುವವ ಭಗವಂತ ಎನ್ನುವ ಎಚ್ಚರವಿರಲಿ. ಯುದ್ಧ ಮಾಡುವಾಗಲೂ ಸಹ "ಆ ಭಗವಂತ ನನ್ನೊಳಗೆ ಕೂತು ಈ ಕಾರ್ಯವನ್ನು ಮಾಡಿಸುತ್ತಿದ್ದಾನೆ, ಇದು ಅವನ ಸಂಕಲ್ಪ" ಎನ್ನುವ ಭಾವನೆ ಯುದ್ಧವನ್ನೂ ದೇವರ ಪೂಜೆಯನ್ನಾಗಿ ಪರಿವರ್ತಿಸುತ್ತದೆ! ನಮ್ಮಿಂದ ತಿಳಿದೋ ತಿಳಿಯದೆಯೋ ಆಗುವ ತಪ್ಪಿನಲ್ಲಿಯೂ ಕೂಡಾ ಭಗವಂತನ ಅರಿವು, ಶರಣಾಗತಿ ನಮಗೆ ಪಾಪದ ಲೇಪ ಬರದಂತೆ ತಡೆಯುತ್ತದೆ. ಭಗವಂತನ ಸ್ಮರಣೆಗೆ ಯಾವುದೇ ಕಾಲದ ನಿರ್ಬಂಧವಿಲ್ಲ. ಯಾವಾಗ ಭಗವಂತನ ಸ್ಮರಣೆ ಬಂತೋ ಅದೇ ಪುಣ್ಯಕಾಲ. ಆತನ ಸ್ಮರಣೆ ಮನಸ್ಸಿನಲ್ಲಿರುವುದೇ ಮಡಿ. ಆದ್ದರಿಂದ ಭಗವಂತನ ಪೂಜಾರೂಪವಾಗಿ ಅಹಂಕಾರವಿಲ್ಲದೆ ಆತನನ್ನು ನೆನೆದು ಕರ್ತವ್ಯ ಮಾಡಬೇಕು.

ಕ್ರಿಯೆಯಲ್ಲಿ ಇರತಕ್ಕ ಭಾವ ಧರ್ಮ-ಅಧರ್ಮವನ್ನು ನಿರ್ಣಯ ಮಾಡುತ್ತದೆ. ಉದಾಹರಣೆಗೆ ಧರ್ಮವ್ಯಾದ. ಈತ ಮಾಂಸ ಮಾರಿಯೂ ಪರಮ ಧಾರ್ಮಿಕನಾಗಿ ಬದುಕಿದ. ಏಕೆಂದರೆ ಆತನ ಅನುಸಂಧಾನ ಶುದ್ಧವಾಗಿತ್ತು. "ದೇವರು ನನ್ನನ್ನು ಈ ಕೆಲಸಕ್ಕೆ ಹಚ್ಚಿದ್ದಾನೆ, ನನ್ನ ಈ ಜನ್ಮದ ಕರ್ತವ್ಯ ಮಾಂಸ ಮಾರಿ ಬದುಕುವುದು. ಅದನ್ನು ಪ್ರಾಮಾಣಿಕವಾಗಿ ಮಾಡಿ ಜೀವನ ಸಾಗಿಸಬೇಕು" ಎನ್ನುವ ಅನುಸಂಧಾನ ಆತನಲ್ಲಿತ್ತು. ಆತ ತನ್ನ

ವ್ಯಾಪಾರವನ್ನು ಕೇವಲ ತನ್ನ ಹಾಗೂ ತನ್ನ ಕುಟುಂಬದ ಜೀವನ ನಿರ್ವಹಣೆಗಾಗಿ ಮಾಡುತ್ತಿದ್ದ. ಈ ರೀತಿ ಪ್ರಾಮಾಣಿಕನಾಗಿ ಬದುಕಿ ಆತ ಋಷಿಗಳನ್ನೂ ಮೀರಿಸುವಷ್ಟು ಎತ್ತರಕ್ಕೇರಿದ. ಆದ್ದರಿಂದ ಭಾವ ಶುದ್ಧಿ ಅತ್ಯಂತ ಶ್ರೇಷ್ಠ. ಹಾಗಾಗಿ ನಾವು ನಮ್ಮ ಮನಸ್ಸು ಮತ್ತು ಬುದ್ಧಿಯನ್ನು ಭಗವಂತನಲ್ಲಿ ನೆಲೆ ನಿಲ್ಲಿಸಬೇಕು. "ಆಗ ನಿಸ್ಸಂಶಯವಾಗಿ ನನ್ನನ್ನು ಸೇರುವೆ" ಎನ್ನುತ್ತಾನೆ ಕೃಷ್ಣ.

ಅಭ್ಯಾಸಯೋಗಯುಕ್ತೇನ ಚೇತಸಾऽನನ್ಯಗಾಮಿನಾ ।
ಪರಮಂ ಪುರುಷಂ ದಿವ್ಯಂ ಯಾತಿ ಪಾರ್ಥಾನುಚಿಂತಯನ್ ॥೮॥

ಅಭ್ಯಾಸ ಯೋಗ ಯುಕ್ತೇನ ಚೇತಸಾ ನ ಅನ್ಯ ಗಾಮಿನಾ ।
ಪರಮಮ್ ಪುರುಷಮ್ ದಿವ್ಯಮ್ ಯಾತಿ ಪಾರ್ಥ ಅನುಚಿಂತಯನ್ –ಪಾರ್ಥಾ, ಸೃಷ್ಟಿಯೊಂದು ಲೀಲೆಯಾದ- ಪರಮ ಪುರುಷನನ್ನು ಅಭ್ಯಾಸದ ಉಪಾಯದಿಂದ ಹದಗೊಂಡು, ಬೇರಾವುದೂ ಬೇಡದ ಒಳಬಗೆಯಿಂದ, ಭಕ್ತಿಯಿಟ್ಟು ನೆನೆದಾಗ ಅವನನ್ನೇನ್ನೆ ಸೇರುತ್ತಾನೆ.

ನಾವು ನಮ್ಮ ಮನಸ್ಸನ್ನು ನಿರಂತರ ಭಗವಂತನಲ್ಲಿ ನೆಲೆ ನಿಲ್ಲುವಂತೆ ಮಾಡಲು 'ನಿರಂತರ ಮನನ' ಅತ್ಯಂತ ಮುಖ್ಯ ಅಂಶ. ಸಾಮಾನ್ಯವಾಗಿ ನಮ್ಮ ಚಿತ್ತ ಬೇಡದ ವಿಷಯಗಳತ್ತ ಹರಿಯುತ್ತದೆ. ಆದರೆ ನಾವು ಅದನ್ನು ಕೇವಲ ಭಗವಂತನನ್ನು ಚಿಂತಿಸುವಂತೆ ತರಬೇತಿಗೊಳಿಸಬೇಕು. ಚಿತ್ತಕ್ಕೆ ಭಗವಂತನನ್ನು ಅನನ್ಯಗಾಮಿಯಾಗಿ ಚಿಂತನೆ ಮಾಡುವಂತೆ ನಿರಂತರ ಅಭ್ಯಾಸ ಮಾಡಿಸಬೇಕು. ನಮ್ಮ ಮನಸ್ಸು, ಬುದ್ಧಿ, ಚಿತ್ತ ಎಲ್ಲವೂ ನಾವು ಅಭ್ಯಾಸ ಮಾಡಿಸಿದಂತೆ ಕೆಲಸ ಮಾಡುತ್ತವೆ. ಅವುಗಳಿಗೆ ನಾವು ಭಗವಂತನ ಚಿಂತನೆಯ ಅಭ್ಯಾಸ ಮಾಡಿಸಬೇಕು. ಮನಸ್ಸು ಚಿತ್ತವನ್ನು ಮಣಿಸುವ ಏಕಮಾತ್ರ ಸಾಧನ ಅಭ್ಯಾಸ. ಹೀಗೆ ಮಾಡಿದಾಗ ಅದು ಭಗವಂತನಲ್ಲಿ ನೆಲೆನಿಲ್ಲುತ್ತದೆ. ಭಗವಂತನಲ್ಲಿ ನೆಲೆನಿಂತ ಮನಸ್ಸು ಅಂತ್ಯಕಾಲದಲ್ಲಿ ಕೂಡಾ ಭಗವಂತನನ್ನೇ ಕಾಣುತ್ತದೆ. ಇದು ಕೇವಲ ಚಿಂತನೆ ಅಲ್ಲ ಇದು ಅನುಚಿಂತನೆ-ಅಂದರೆ ಭಗವಂತನ ಯಥಾರ್ಥ (ಯತಾವತ್ತಾದ)ಚಿಂತನೆ. ಶ್ರುತಿಯಲ್ಲಿ ಹೇಗೆ ಹೇಳಿದ್ದಾರೋ ಹಾಗೇ ಭಗವಂತನನ್ನು ಚಿಂತನೆ ಮಾಡಬೇಕು. ಅಸತ್ಯವನ್ನು ಚಿಂತನೆ ಮಾಡಿ ಭಗವಂತನನ್ನು ಸೇರಲು ಸಾಧ್ಯವಿಲ್ಲ.

ಏಕಾಗ್ರವಾದ ಮನಸ್ಸಿನಿಂದ ದಿವ್ಯನಾದ ಪರಮಪುರುಷ, ಹೃತ್ಕಮಲ ಮದ್ಯನಿವಾಸಿ ಭಗವಂತನ ಚಿಂತನೆ ಮಾಡಬೇಕು ಎನ್ನುತ್ತಾನೆ ಕೃಷ್ಣ. ಮಹತೋಮಹಿಯಾದ ಭಗವಂತ ನಿನ್ನ ಹೃದಯದಲ್ಲಿ ಅಣೋರಣೀಯವಾಗಿ ಇರುವುದನ್ನು ಧ್ಯಾನದಲ್ಲಿ ಗುರುತಿಸು ಎನ್ನುವುದು ಇಲ್ಲಿ ಕೃಷ್ಣನ ಸಂದೇಶ. ಭಗವಂತ ಸರ್ವಗತ, ಸರ್ವಸಮರ್ಥ, ಸರ್ವಗುಣಪೂರ್ಣ, ಅನಾಧಿನಿತ್ಯ. ಅಂತಹ ಭಗವಂತ ನಮ್ಮ ಹೃತ್ಕಮಲದಲ್ಲಿ ವಾಸಿಸಿದ್ದಾನೆ ಮತ್ತು ದಿವ್ಯನಾಗಿದ್ದಾನೆ.

ಇಲ್ಲಿ ಬಳಸಿರುವ ದಿವ್ಯ ಪದಕ್ಕೆ ಅನೇಕ ಅರ್ಥಗಳಿವೆ. ಮೂಲವಾಗಿ ದಿವ್ಯ ಅಥವಾ 'ದೇವರು' ಈ ಪದಗಳು 'ದಿವು' ಎನ್ನುವ ಧಾತುವಿನಿಂದ ಬಂದಿರುವುದು. ಪ್ರಾಚೀನ ಧಾತು ಪಾಠದಲ್ಲಿ ಈ ಧಾತುವಿಗೆ ಏಳು ಅರ್ಥವನ್ನು ನೋಡಬಹುದು; ಅವುಗಳೆಂದರೆ: ೧) ಧ್ಯುತಿ ೨) ವಿಜಿಗೀಶ ೩) ಕಾಂತಿ ೪) ಸ್ತುತಿ ೫) ವ್ಯವಹಾರ ೬) ಕ್ರೀಡಾ ೭)

ಗತಿಶು. ಇತ್ತೀಚೆಗೆ ಮೋದ, ಮದ ಮತ್ತು ಸ್ವಪ್ನ ಎನ್ನುವ ಇನ್ನೂ ಮೂರು ಅರ್ಥವನ್ನು ಸೇರಿಸಿದ್ದಾರೆ. ಆದರೆ ಇದು ಪ್ರಾಚೀನ ಧಾತುಪಾಠದಲ್ಲಿ ಇಲ್ಲ. ಈಗ ಸಂಕ್ಷಿಪ್ತವಾಗಿ ಮೇಲಿನ ಏಳು ಅರ್ಥಗಳನ್ನು ನೋಡೋಣ.

೧) ಧ್ಯುತಿ : ಧ್ಯುತಿ ಅಂದರೆ ಬೆಳಕಿನ ಸ್ವರೂಪ. ಬೆಳಕಿನ ಪುಂಜವಾದ ಸೂರ್ಯ ಚಂದ್ರಾದಿಗಳಿಗೆ ಬೆಳಕನ್ನೀಯುವ ಭಗವಂತ ನಮ್ಮೊಳಗೆ ಜ್ಞಾನದ ಬೆಳಕನ್ನು ತುಂಬುತ್ತಾನೆ.

೨) ವಿಜಿಗೀಶ: ಭಗವಂತ ಎಲ್ಲರಿಗಿಂತ ಎತ್ತರದಲ್ಲಿರುವವನು ಹಾಗೂ ಗೆಲುವಿನ ಸ್ವರೂಪ.

೩) ಕಾಂತಿ: ಕೇವಲ ಇಚ್ಛೆಯಿಂದ ಸೃಷ್ಟಿ ಮಾಡಬಲ್ಲವ. ನಮಗೆ ಇಚ್ಛೆಯನ್ನು ಕೊಟ್ಟವ ಹಾಗೂ ಅದನ್ನು ಅವರವರ ಯೋಗ್ಯತೆಗೆ ತಕ್ಕಂತೆ ಪೂರೈಸುವವ.

೪) ಸ್ತುತಿ: ಎಲ್ಲರಿಂದ ಸ್ತುತನಾದವನು; ಎಲ್ಲರೂ ಯಾರನ್ನು ಸ್ತುತಿಸುತ್ತಾರೋ ಅವನು ಸರ್ವಶಬ್ದ ವಾಚ್ಯನಾದ ಭಗವಂತ.

೫) ವ್ಯವಹಾರ: ಜಗತ್ತಿನ ಸಮಸ್ತ ವ್ಯವಹಾರವನ್ನು ನಿರ್ವಹಿಸುವವ.

೬) ಕ್ರೀಡಾ: ಸೃಷ್ಟಿ-ಸ್ಥಿತಿ-ಸಂಹಾರ ಇದು ಭಗವಂತನಿಗೊಂದು ಕ್ರೀಡೆ. ಹುಟ್ಟು-ಸಾವು, ಸರ್ವ ವ್ಯವಹಾರಗಳು ಆತನಿಗೊಂದು ಕ್ರೀಡೆ.

೭) ಗತಿಶು: ಚಲನೆ ಮತ್ತು ಜ್ಞಾನ ಕೊಟ್ಟವ. ಯಾರು ಎಲ್ಲಾ ಕಡೆ ಗತನಾಗಿದ್ದಾನೋ; ಎಲ್ಲವನ್ನೂ ತಿಳಿದಿದ್ದಾನೋ; ಎಲ್ಲರೊಳಗೆ ಬಿಂಬ ರೂಪದಲ್ಲಿ ನೆಲೆಸಿದ್ದಾನೋ ಅವನು ದಿವ್ಯ ಅಥವಾ 'ದೇವ'

ಹೀಗೆ ಅನೇಕ ಅರ್ಥಗಳನ್ನು 'ದಿವ್ಯ' ಎನ್ನುವ ಪದದಲ್ಲಿ ಕಂಡುಕೊಳ್ಳಬಹುದು. "ಓ ದೇವರೇ" ಎನ್ನುವಾಗ ಮೇಲಿನ ಅರ್ಥವನ್ನು ಒಮ್ಮೆ ನೆನೆದರೆ ಅದರಿಂದಾಗುವ ಆನಂದ ಅಪರಿಮಿತ. ಭಗವಂತನ ನಾಮದಲ್ಲಿ ಅಷ್ಟೊಂದು ಬಲವಿದೆ. ನಾವು ಭಗವಂತನ ಜೊತೆಗೇ ಇದ್ದೂ ಕೂಡಾ ಮಾನಸಿಕವಾಗಿ ಆತನಿಂದ ದೂರವಿದ್ದೇವೆ. ಭಗವಂತನ ನಿರಂತರ ಅನುಚಿಂತನೆಯಿಂದ ನಾವು ಆತನ ಸಾಕ್ಷಾತ್ಕಾರ ಪಡೆಯಬಹುದು.

ಈ ಅಧ್ಯಾಯದ ಮುಂದಿನ ಭಾಗದಲ್ಲಿ ಕೃಷ್ಣ ಭಗವಂತನನ್ನು ಅನುಚಿಂತನೆ ಮಾಡುವುದು ಅಂದರೆ ಏನು ಎನ್ನುವುದನ್ನು ವಿವರಿಸುತ್ತಾನೆ. ಒಬ್ಬ ಧ್ಯಾನ ಮಾಡುವವ ಭಗವಂತನನ್ನು ಯಾವರೀತಿ ಧ್ಯಾನ ಮಾಡಬೇಕು ಎನ್ನುವ ಚಿತ್ರಣವನ್ನು ಮುಂದಿನ ಶ್ಲೋಕಗಳಲ್ಲಿ ಕಾಣಬಹುದು.

ಕವಿಂ ಪುರಾಣಮನುಶಾಸಿತಾರಮಣೋರಣೀಯಾಂಸಮನುಸ್ಮರೇದ್ ಯಃ ।
ಸರ್ವಸ್ಯ ಧಾತಾರಮಚಿಂತ್ಯರೂಪಮಾದಿತ್ಯವರ್ಣಂ ತಮಸಃ ಪರಸ್ತಾತ್ ॥೯॥

ಕವಿಮ್ ಪುರಾಣಮ್ ಅನುಶಾಸಿತಾರಮ್ ಅಣೋಃ ಅಣೀಯಾಂಸಮ್ ಅನುಸ್ಮರೇತ್ ಯಃ ।
ಸರ್ವಸ್ಯ ಧಾತಾರಮ್ ಅಚಿಂತ್ಯ ರೂಪಮ್ ಆದಿತ್ಯ ವರ್ಣಮ್ ತಮಸಃ ಪರಸ್ತಾತ್ –ಎಲ್ಲವನ್ನು ಬಲ್ಲವನು, ಎಲ್ಲಕ್ಕಿಂತ ಮೊದಲಿದ್ದವನು, ಎಲ್ಲರ ಒಡೆಯ, ಅಣುವಿಗಿಂತ ಅಣು, ಎಲ್ಲವನ್ನು ಹೊತ್ತು ಸಲಹುವವನು, ಬಗೆಗೆ ನಿಲುಕದ ನಿಟ್ಟಿನವನು, ಸೂರ್ಯನಂತೆ ಬೆಳಗುವವನು, ಕತ್ತಲಿನಾಚೆಗಿರುವವನು[ಸಾವಿರದವನು]-ಹೀಗೆಂದು ಅವನನ್ನು ಸ್ಮರಿಸುವವನು[ಅವನನ್ನೇ ಸೇರುತ್ತಾನೆ].

ನಮ್ಮ ಅಂತರ್ಯಾಮಿ ಭಗವಂತನನ್ನು ಧ್ಯಾನ ಮಾಡುವಾಗ 'ಅನುಸಂಧಾನ ಮಾಡಬೇಕಾದ ವಿಷಯಗಳನ್ನು' ಕೃಷ್ಣ ಇಲ್ಲಿ ಬಿಡಿಸಿ ಬಿಡಿಸಿ ಹೇಳುತ್ತಾನೆ. ಕೃಷ್ಣ ಹೇಳುತ್ತಾನೆ "ಭಗವಂತನನ್ನು ಕವಿ ಎಂದು ಉಪಾಸನೆ ಮಾಡು" ಎಂದು. ಇಲ್ಲಿ ಕವಿ ಎಂದರೆ ಸರ್ವಜ್ಞ ಎಂದರ್ಥ. ನಮಗೆ ಮೊದಲು ಬೇಕಾಗಿರುವುದು ಜ್ಞಾನ. ಜ್ಞಾನವಿಲ್ಲದೆ ಆನಂದವಿಲ್ಲ. ಇದಕ್ಕಾಗಿ ಭಗವಂತನಲ್ಲಿ ಮೊದಲು ಅರಿವನ್ನು ಬೇಡಬೇಕು. ಎರಡನೇಯದಾಗಿ ಭಗವಂತನನ್ನು ಪುರಾಣಮ್ ಎಂದು ಉಪಾಸನೆ ಮಾಡು ಎನ್ನುತ್ತಾನೆ ಕೃಷ್ಣ. ಪುರಾಣ ಎಂದರೆ ಎಲ್ಲಕ್ಕಿಂತ ಮೊದಲಿದ್ದವ ಮತ್ತು ಸರ್ವ ಕಾಲದಲ್ಲೂ ಏಕಪ್ರಕಾರನಾಗಿರುವವ. ನಮ್ಮ ಪುರ(ದೇಹ)ದೊಳಗೆ ಕೂತು ಪ್ರತೀಕ್ಷಣದಲ್ಲಿಯೂ ನಮ್ಮನ್ನು ನಿಯಂತ್ರಿಸುವವ ಎನ್ನುವ ಅನುಸಂಧಾನ.

ಮೂರನೆಯದಾಗಿ ಭಗವಂತ 'ಅನುಶಾಸಿತಾರಮ್'. ಅಂದರೆ ಪ್ರತಿಯೊಂದನ್ನೂ ಕೂಡಾ ನಿಯಮನ(ಶಾಸನ) ಮಾಡುವವನು. ನನ್ನ ಇರವು, ಜಗತ್ತಿನ ಪ್ರತಿಯೊಂದು ವಸ್ತುವಿನ ಇರವು-ಅವನ ನಿಯಂತ್ರಣಕ್ಕೊಳಪಟ್ಟಿದೆ; ಭಗವಂತ ಪ್ರತಿಯೊಂದು ಜೀವ ಸ್ವರೂಪದ ಯೋಗ್ಯತೆಗನುಗುಣವಾಗಿ ಶಾಸನ ಮಾಡುತ್ತಾನೆ-ಎಂದು ಅರಿತು ಅವನನ್ನು ಅನುಸಂಧಾನ ಮಾಡಬೇಕು. ಸಮಸ್ತ ಬ್ರಹ್ಮಾಂಡದಲ್ಲಿ ತುಂಬಿದ ಆ ಭಗವಂತನೇ ಅಣುವಿಗಿಂತ ಅಣುವಾಗಿ ಜೀವ ಸ್ವರೂಪದ ಒಳಗೂ ತುಂಬಿದ್ದಾನೆ. "ಎಲ್ಲವನ್ನೂ ಧರಿಸಿದ ಭಗವಂತನೇ ನಮ್ಮೊಳಗೆ ಕೂತು ಪೋಷಣೆ ಮಾಡುತ್ತಿದ್ದಾನೆ. ಆತ ಇಡೀ ವಿಶ್ವದ ಧಾರಣೆ-ಪೋಷಣೆ ಮಾಡುವ ಶಕ್ತಿ. ಆತ ಸರ್ವರಿಗೂ ಸರ್ವಾಭೀಷ್ಟವನ್ನು ಕೊಡುವವ" ಎಂದು ಅವನನ್ನು ಧ್ಯಾನ ಮಾಡಬೇಕು.

ಭಗವಂತ ನಮ್ಮ ಕಲ್ಪನೆಗೆ ಎಟುಕದ ವಸ್ತು ಎಂದು ನಾವು ತಿಳಿದಿರಬೇಕು. ಆತನದು ನಮ್ಮ ಮಾತು ಮನಸ್ಸಿಗೆ ಮುಟ್ಟದ ರೂಪ. ಧ್ಯಾನದಲ್ಲಿ ಜೀವಸ್ವರೂಪದ ಕಣ್ಣಿನಿಂದ ಭಗವಂತನನ್ನು ನೋಡಿದರೆ ಆತ ಉದಿಸುವ ಸೂರ್ಯನಂತೆ ಕಾಣುತ್ತಾನೆ. ಆತನ ಬಣ್ಣ ಪ್ರಕೃತಿ ನಿರ್ಮಿತವಾದ ಬಣ್ಣವಲ್ಲ, ಅದು ತ್ರಿಗುಣಾತೀತವಾದ ಎಂದೂ ಅಳಿವಿರದ ಅಪ್ರಾಕೃತ ಬಣ್ಣ. ಹೀಗೆ ಭಗವಂತನನ್ನು ತಿಳಿದು ನಿರಂತರ ಚಿಂತನೆ ಮಾಡುವವ ತನ್ನ ದೇಹ ತ್ಯಾಗ ಮಾಡುವಾಗ ಭಗವಂತನನ್ನೇ ನೆನೆದು ಭಗವಂತನನ್ನು ಸೇರುತ್ತಾನೆ.

ಪ್ರಯಾಣಕಾಲೇ ಮನಸಾಽಚಲೇನ ಭಕ್ತ್ಯಾ ಯುಕ್ತೋ ಯೋಗಬಲೇನ ಚೈವ ।
ಭ್ರುವೋರ್ಮಧ್ಯೇ ಪ್ರಾಣಮಾವೇಶ್ಯ ಸಮ್ಯಕ್ ಸ ತಂ ಪರಂ ಪುರುಷಮುಪೈತಿ ದಿವ್ಯಮ್ ॥೧೦॥

ಪ್ರಯಾಣ ಕಾಲೇ ಮನಸಾ ಅಚಲೇನ ಭಕ್ತ್ಯಾ ಯುಕ್ತಃ ಯೋಗಬಲೇನ ಚ ಏವ ।
ಭ್ರುವೋಃ ಮಧ್ಯೇ ಪ್ರಾಣಮ್ ಆವೇಶ್ಯ ಸಮ್ಯಕ್ ಸಃ ತಮ್ ಪರಮ್ ಪುರುಷಮ್ ಉಪೈತಿ ದಿವ್ಯಮ್ –ಕೊನೆಯ ಕಾಲದಲ್ಲಿ ಭಗವಂತನಲ್ಲಿ ಭಕ್ತಿಯಿಟ್ಟು, ಬಿಗಿಯಾದ ಬಗೆಯಿಂದ , ಹುಬ್ಬುಗಳ ನಡುವೆ ಪ್ರಾಣವಾಯುವನ್ನು ಕದಲದಂತೆ ಇರಗೊಳಿಸಿ, ಪ್ರಾಣಾಯಾಮದ ಯೋಗದ ಮೂಲಕ ಕೂಡಾ ಲೀಲಾಲೋಲನಾದ ಆ ಪರಮಪುರುಷನನ್ನು ಪಡೆಯಬಹುದು.

ಭಗವಂತನನ್ನು ಸೇರುವ ಇನ್ನೊಂದು ಮಾರ್ಗ ಹಠಯೋಗ. ಈ ಮಾರ್ಗ ಕಠಿಣವಾದದ್ದು. ಇದು ಯಮನಿಯಮನ-ಪ್ರಾಣಾಯಾಮ-ಪ್ರತ್ಯಾಹಾರಗಳಿಂದ ಭಗವಂತನನ್ನು ಸೇರುವ ಬಗೆ. ಈ ಮಾರ್ಗದಲ್ಲಿ

ಸಾಧನೆ ಮಾಡುವವರು ತಮ್ಮ ಸಾವಿನ ಕಾಲದಲ್ಲಿ ಏನು ಮಾಡಬೇಕು ಎನ್ನುವುದನ್ನು ಕೃಷ್ಣ ಈ ಶ್ಲೋಕದಲ್ಲಿ ವಿವರಿಸುತ್ತಾನೆ. ಆಸನ ಪ್ರಾಣಾಯಾಮ ಮಾಡಿ ಸ್ಥಿರವಾದ ದೇಹ, ಸ್ಥಿರವಾದ ಪ್ರಾಣಮಯ ಕೋಶವನ್ನು ಸಾಧಿಸಿದ ಮೇಲೆ, ಪ್ರತ್ಯಾಹಾರದ ಮೂಲಕ ತನ್ನೊಳಗೆ ತುಂಬಿದ ಕೆಟ್ಟ ಸಂಗತಿಗಳನ್ನು ಹೊರ ಹಾಕಿ, ಕೆಟ್ಟ ವಿಚಾರ ಒಳಬಾರದಂತೆ ತಡೆದು, ಏಕಾಗ್ರತೆ ಸಾಧಿಸುವುದು. ಇದು ತುಂಬಾ ಧೀರ್ಘವಾದ ಕಠಿಣ ಸಾಧನೆ. ಇಂತವರು ತಮ್ಮ ಹೃತ್ಕಮಲ ಮಧ್ಯ(ಅನಾಹತ ಚಕ್ರ) ದಲ್ಲಿ ಪ್ರಾಣಶಕ್ತಿಯೊಂದಿಗಿರುವ ಜೀವವನ್ನು ಅಲ್ಲಿಂದ ಊರ್ಧ್ವ ಮುಖವಾಗಿ ವಿಶುದ್ಧಿಚಕ್ರದ ಮೂಲಕ ಭ್ರುಮಧ್ಯ (ಎರಡು ಹುಬ್ಬುಗಳ ನಡುವೆ ಇರುವ ಆಜ್ಞಾ ಚಕ್ರ) ತಂದು ನಿಲ್ಲಿಸಬೇಕು. ಈ ಪ್ರಕ್ರಿಯೆ ಅತ್ಯಂತ ಕಠಿಣ. ಈ ಸಂಪೂರ್ಣ ಕ್ರಿಯೆಯಲ್ಲಿ ಅನನ್ಯ ಭಕ್ತಿ ಬಹಳ ಮುಖ್ಯ. ಈ ರೀತಿ ಭ್ರುಮಧ್ಯದಿಂದ ಸಹಸ್ರಾರದ ಬ್ರಹ್ಮರಂದ್ರದ ಮೂಲಕ ಜೀವ ಹೊರ ಹೋದರೆ ಅವರು ನೇರವಾಗಿ ಭಗವಂತನನ್ನು ಸೇರುತ್ತಾರೆ.

ಈ ರೀತಿಯ ಹಠಯೋಗ ಕಠಿಣ ಸಾಧನವಾಗಿರುವುದರಿಂದ ಪ್ರಾಚೀನರು ಅದಕ್ಕೆ ಪೂರಕವಾದ ಅತ್ಯಂತ ಸರಳ ವಿಧಾನವನ್ನು ತಮ್ಮ ದೈನಂದಿನ ಜೀವನದಲ್ಲಿ ತೊಡಗಿಸಿಕೊಂಡಿದ್ದರು. ಇದಕ್ಕೆ ಉತ್ತಮ ಉದಾಹರಣೆ ಊರ್ಧ್ವಪುಂಡ್ರ. ಇದು ಜೀವದ ಊರ್ಧ್ವಮುಖ ಗತಿಗೆ ಸಂಬಂಧಪಟ್ಟದ್ದು. ಇದು ಪೂರ್ಣ ಪ್ರಮಾಣದಲ್ಲಿ ದೇಹದಲ್ಲಿರುವ ಶಕ್ತಿ ಕೇಂದ್ರಗಳನ್ನು ಜಾಗೃತಿಗೊಳಿಸುವ ಒಂದು ಸರಳ ವಿಧಾನ. [ಆದರೆ ಇಂದು ನಾವು ಏಕೆ ನಾಮ ಹಾಕಿ ಕೊಳ್ಳುತ್ತೇವೆ ಎನ್ನುವುದೇ ನಮಗೆ ತಿಳಿದಿಲ್ಲ].

ಹಠಯೋಗವನ್ನು ಸರಿಯಾದ ಮಾರ್ಗದರ್ಶನ ಇಲ್ಲದೆ ಮಾಡುವುದು ಅಪಾಯಕಾರಿ. ಭಾಗವತದ ದ್ವಿತೀಯ ಸ್ಕಂದದಲ್ಲಿ ಜೀವವನ್ನು ಮೇಲಕ್ಕೆ ಕೊಂಡೊಯ್ಯುವ ಹಂತವನ್ನು ಒಂದು ಅಧ್ಯಾಯದಲ್ಲಿ ವಿವರವಾಗಿ ವಿವರಿಸಿದ್ದಾರೆ. ಹೀಗೆ ಯೋಗದ ಮೂಲಕ ಹಠಮಾಡಿ ಭಗವಂತನನ್ನು ಸೇರಬಹುದು, ಅಥವಾ ತಾಯಿಯಲ್ಲಿ ಮಗು ಹಠಮಾಡಿದಂತೆ ಭಗವಂತನಲ್ಲಿ ಭಕ್ತ ಸದಾ ಭಕ್ತಿಯೆಂಬ ಹಠಮಾಡಿ ಆತನನ್ನು ಸೇರಬಹುದು.

ಹೀಗೆ ಭ್ರುಮಧ್ಯದಲ್ಲಿ ಜೀವವನ್ನು ತಂದು ನಿಲ್ಲಿಸುವ ವಿಧಾನವನ್ನು ವಿವರಿಸಿದ ಕೃಷ್ಣ, ಅಲ್ಲಿಂದ ಮುಂದೆ ಸಹಸ್ರಾರದ ಶಕ್ತಿ ಕೇಂದ್ರದ ದ್ವಾರದ ಮೂಲಕ ಜೀವ ಹೊರ ಹೋಗುವ ವಿಧಾನವನ್ನು ಇನ್ನೂ ವಿವರವಾಗಿ ಮುಂದಿನ ಮೂರು ಶ್ಲೋಕದಲ್ಲಿ ವಿವರಿಸುತ್ತಾನೆ.

ಯದಕ್ಷರಂ ವೇದವಿದೋ ವದಂತಿ ವಿಶಂತಿ ಯದ್ ಯತಯೋ ವೀತರಾಗಾಃ ।
ಯದಿಚ್ಛಂತೋ ಬ್ರಹ್ಮಚರ್ಯಂ ಚರಂತಿ ತತ್ ತೇ ಪದಂ ಸಂಗ್ರಹೇಣ ಪ್ರವಕ್ಷ್ಯೇ ॥೧೧॥

ಯತ್ ಅಕ್ಷರಂ ವೇದವಿದಃ ವದಂತಿ ವಿಶಂತಿ ಯತ್ ಯತಯಃ ವೀತ ರಾಗಾಃ ।
ಯತ್ ಇಚ್ಛಂತಃ ಬ್ರಹ್ಮಚರ್ಯಮ್ ಚರಂತಿ ತತ್ ತೇ ಪದಮ್ ಸಂಗ್ರಹೇಣ ಪ್ರವಕ್ಷ್ಯೇ -ವೇದ ಬಲ್ಲವರು ಅಳಿವಿರದ ಅದನ್ನು 'ಅಕ್ಷರ' ಎನ್ನುತ್ತಾರೆ. ಭೋಗದ ಒಲವು ತೊರೆದ ಸಾಧಕರು ಅದನ್ನೇ ಸೇರುತ್ತಾರೆ. ಅದನ್ನು ಸೇರಬಯಸಿಯೇ ಬಗೆಯಲ್ಲಿ ಆ ಹಿರಿಯ ತತ್ವವನ್ನು ಚಿಂತಿಸುತ್ತಾರೆ. ಅಂತಹ ಮುಕ್ತಿಪ್ರದವಾದ ಪರತತ್ವವನ್ನುನಿನಗೆ ಅಡಕವಾಗಿ ಹೇಳುತ್ತೇನೆ.

ಕೃಷ್ಣ ಹೇಳುತ್ತಾನೆ "ಯೋಗ ಸಾಧನೆಯಿಂದ ಭ್ರುಮಧ್ಯೆ ತಂದು ನಿಲ್ಲಿಸಿದ ಜೀವವನ್ನು ಅಲ್ಲಿಂದ ಧ್ಯಾನ ಮಾಡುತ್ತಾ ಮೇಲಕ್ಕೆ ಸಹಸ್ರಾರದತ್ತ ತೆಗೆದುಕೊಂಡು ಹೋಗಬೇಕು" ಎಂದು. ಈ ಕಾಲದಲ್ಲಿ ಧ್ಯಾನ ಮಾಡಬೇಕಾದ ರೂಪದ ಬಗ್ಗೆ ಹೇಳುತ್ತಾ ಕೃಷ್ಣ ಹೇಳುತ್ತಾನೆ "ವೇದವನ್ನು ಬಲ್ಲವರು ಅದನ್ನು ಅಳಿವಿರದ 'ಅಕ್ಷರ'(ಓಂಕಾರ ಎನ್ನುವ ಅಕ್ಷರದಿಂದ ಪ್ರತಿಪಾದ್ಯನಾದ ಸರ್ವಶಬ್ದ ವಾಚ್ಯ) ಎನ್ನುತ್ತಾರೆ" ಎಂದು. ಮಹಾ ಪ್ರಯತ್ನದಿಂದ ಭಗವಂತನನ್ನು ಒಲಿಸಿಕೊಂಡವರು, ಪ್ರಾಪಂಚಿಕ ಸೆಳೆತದಿಂದ ಪಾರಾದವರು, ಆ ಭಗವಂತನನ್ನು ಹೋಗಿ ಸೇರುತ್ತಾರೆ. "ಅವರು ಅಂತಹ ಭಗವಂತನನ್ನು ತಿಳಿದುಕೊಳ್ಳಬಯಸಿ ಬ್ರಹ್ಮಚರ್ಯವನ್ನು ಜೀವನದಲ್ಲಿ ಅಳವಡಿಸಿಕೊಳ್ಳುತ್ತಾರೆ" ಎನ್ನುತ್ತಾನೆ ಕೃಷ್ಣ. [ಇಲ್ಲಿ 'ಬ್ರಹ್ಮಚರ್ಯ' ಎಂದರೆ ನಿಘಂಟಿನಲ್ಲಿ ಹೇಳುವ ದೈಹಿಕ ಬ್ರಹ್ಮಚರ್ಯವಲ್ಲ, ಬದಲಿಗೆ 'ಬ್ರಹ್ಮಣಿ ಚರಣಂ'-ಭಗವಂತನಲ್ಲಿ ಮನಸ್ಸು ನೆಲೆಗೊಳ್ಳುವಿಕೆ-ಬ್ರಹ್ಮಚರ್ಯ]. "ಅದನ್ನು ಸೇರಬಯಸಿಯೆ ಬಗೆಯಲ್ಲಿ ಆ ಹಿರಿಯ ತತ್ವವನ್ನು ಚಿಂತಿಸುತ್ತಾರೆ. ಈ ರೀತಿ ಮೋಕ್ಷವನ್ನು ಪಡೆಯುವ ಪ್ರಕ್ರಿಯೆಯನ್ನು ಸಂಗ್ರಹವಾಗಿ ನಿನಗೆ ಹೇಳುತ್ತೇನೆ" ಎಂದು ಹೇಳಿ ಕೃಷ್ಣ ಈ ಪ್ರಕ್ರಿಯೆಯನ್ನು ಮುಂದಿನ ಶ್ಲೋಕಗಳಲ್ಲಿ ಅರ್ಜುನನಿಗೆ ವಿವರಿಸುತ್ತಾನೆ.

ಸರ್ವದ್ವಾರಾಣಿ ಸಂಯಮ್ಯ ಮನೋ ಹೃದಿ ನಿರುಧ್ಯ ಚ ।
ಮೂರ್ಧ್ನ್ಯಾಧಾಯಾತ್ಮನಃ ಪ್ರಾಣಮಾಸ್ಥಿತೋ ಯೋಗಧಾರಣಾಮ್॥೧೨॥

ಓಮಿತ್ಯೇಕಾಕ್ಷರಂ ಬ್ರಹ್ಮ ವ್ಯಾಹರನ್ ಮಾಮನುಸ್ಮರನ್ ।
ಯಃ ಪ್ರಯಾತಿ ತ್ಯಜನ್ ದೇಹಂ ಸ ಯಾತಿ ಪರಮಾಂ ಗತಿಮ್ ॥೧೩॥

ಸರ್ವದ್ವಾರಾಣಿ ಸಂಯಮ್ಯ ಮನಃ ಹೃದಿ ನಿರುಧ್ಯ ಚ ।
ಮೂರ್ಧ್ನಿ ಆಧಾಯಾ ಆತ್ಮನಃ ಪ್ರಾಣಮ್ ಆಸ್ಥಿತಃ ಯೋಗ ಧಾರಣಾಮ್ ॥
ಓಂ ಇತಿ ಏಕಾಕ್ಷರಮ್ ಬ್ರಹ್ಮ ವ್ಯಾಹರನ್ ಮಾಮ್ ಅನುಸ್ಮರನ್ ।
ಯಃ ಪ್ರಯಾತಿ ತ್ಯಜನ್ ದೇಹಮ್ ಸಃ ಯಾತಿ ಪರಮಾಮ್ ಗತಿಮ್ – ಎಲ್ಲಾ ನಾಡಿ ದ್ವಾರಗಳನ್ನು ತಡೆ ಹಿಡಿದು , ಬಗೆಯನ್ನು ಭಗವಂತನಲ್ಲೇ ಬಿಗಿ ಹಿಡಿದು, ತನ್ನ ಪ್ರಾಣವಾಯುವನ್ನು ನೆತ್ತಿಯಲ್ಲಿರಿಸಿ ಯೋಗ ಸಾಧನೆಯಲ್ಲಿ ನೆಲೆಗೊಂಡವನು, 'ಓಂ' ಎಂಬ ಒಂದಕ್ಷರದಿಂದ ವಾಚ್ಯನಾದ ಪರತತ್ವವನ್ನು ಕೊಂಡಾಡುತ್ತಾ, ನನ್ನನ್ನು ನೆನೆಯುತ್ತಾ, ದೇಹ ತೊರೆದು ಮೇಲೇರಿದವನು ಮರಳಿ ಬರದ ತಾಣವನ್ನು ಸೇರುತ್ತಾನೆ.

ಸಹಸ್ರಾರದತ್ತ ಜೀವವನ್ನು ಕೊಂಡೊಯ್ಯುವಾಗ ದೇಹದ ಇತರ ಎಲ್ಲಾ ದ್ವಾರಗಳನ್ನೂ ಯೋಗ ಬಲದಿಂದ ಮುಚ್ಚಬೇಕು ಮತ್ತು ಮುಚ್ಚಿರುವ ಸಹಸ್ರಾರದ ಬಾಗಿಲನ್ನು ತೆರೆದು ಹೊರಹೋಗಬೇಕು. ಈ ರೀತಿ ಮಾಡುವಾಗ ಮನಸ್ಸನ್ನು ಆ ಸರ್ವಸಂಹಾರಕ ಭಗವಂತನಲ್ಲಿ ನೆಲೆಗೊಳಿಸಬೇಕು. ಪೂರ್ಣಪ್ರಮಾಣದಲ್ಲಿ ತನ್ನ ಯೋಗಾಭ್ಯಾಸವನ್ನು ಬಳಸಿ, ಶ್ವಾಸ ನಿರೋಧ ಮಾಡಿ, ಮನಸ್ಸನ್ನು ಭಗವಂತನಲ್ಲಿಟ್ಟು ಧ್ಯಾನ ಮಾಡಬೇಕು.

"ಓಂಕಾರ ಪ್ರತಿಪಾದ್ಯನಾದ ನನ್ನನ್ನು ಓಂಕಾರದಿಂದ ನೆನೆಯುತ್ತಾ ಸಹಸ್ರರದ ಬಾಗಿಲಿನಿಂದ ಹೊರಬಂದು ದೇಹ ತ್ಯಾಗ ಮಾಡಿ ಮೇಲೇರಿದವನು ಮುಂದೆಂದೂ ಮರಳಿ ಬರದ ತಾಣವಾದ ಮೋಕ್ಷ(ಭಗವಂತ)ವನ್ನು ಸೇರುತ್ತಾನೆ".

ಈ ಸಾಧನೆ ಕೇವಲ ಹಠಯೋಗಿಗಳಿಗೆ ಸಾಧ್ಯ ಮತ್ತು ಇದು ತುಂಬಾ ಕಷ್ಟದ ಸಾಧನೆ. ಎಲ್ಲರೂ ಈ ರೀತಿ ಯೋಗಾಭ್ಯಾಸ ಮಾಡಿ ಸಿದ್ಧಿ ಪಡೆಯುವುದು ಸಾಧ್ಯವಿಲ್ಲ. ಅದಕ್ಕಾಗಿ ಮುಂದಿನ ಶ್ಲೋಕದಲ್ಲಿ ಕೃಷ್ಣ ಸುಲಭದ ಮಾರ್ಗವನ್ನು ವಿವರಿಸುತ್ತಾನೆ.

ಅನನ್ಯಚೇತಾಃ ಸತತಂ ಯೋ ಮಾಂ ಸ್ಮರತಿ ನಿತ್ಯಶಃ ।
ತಸ್ಯಾಹಂ ಸುಲಭಃ ಪಾರ್ಥ ನಿತ್ಯಯುಕ್ತಸ್ಯ ಯೋಗಿನಃ ॥೧೪॥

ಅನನ್ಯ ಚೇತಾಃ ಸತತಮ್ ಯಃ ಮಾಮ್ ಸ್ಮರತಿ ನಿತ್ಯಶಃ ।
ತಸ್ಯ ಅಹಮ್ ಸುಲಭಃ ಪಾರ್ಥ ನಿತ್ಯ ಯುಕ್ತಸ್ಯ ಯೋಗಿನಃ -ಪಾರ್ಥಾ, ಬೇರೇನನ್ನೂ ನೆನೆಯದೆ ಅನುದಿನವೂ ನಿರಂತರ ನನ್ನನ್ನು ನೆನೆಯುವವನಿಗೆ, ಅಂತಹ ನಿರಂತರ ಸಾಧನೆಯಿಂದ ಸಿದ್ಧಿಪಡೆದವನಿಗೆ ನಾನು ಕೈಸೆರೆ.

"ನಿರಂತರ ನಿತ್ಯ ಭಗವಂತನ ಚಿಂತನೆ ಮಾಡುತ್ತಾ ಬೇರೇನನ್ನೂ ನೆನೆಯದೇ ನನ್ನನ್ನು ಭಜಿಸುವ ಸಾಧಕನಿಗೆ ನಾನು ಅನಾಯಾಸವಾಗಿ ಸ್ವಾಧೀನನಾಗುತ್ತೇನೆ" ಎನ್ನುತ್ತಾನೆ ಕೃಷ್ಣ. ಸಾಧನೆಯಲ್ಲಿ ನಿತ್ಯ ತೊಡಗಿ, ಸಾಧನೆಯ ತುದಿ ಮುಟ್ಟಿದವ ಬೇರೆ ಯಾವ ಪ್ರಯತ್ನವೂ ಇಲ್ಲದೆ ಭಗವಂತನನ್ನು ಸೇರುತ್ತಾನೆ

ಮಾಮುಪೇತ್ಯ ಪುನರ್ಜನ್ಮ ದುಃಖಾಲಯಮಶಾಶ್ವತಮ್ ।
ನಾऽಪ್ನುವಂತಿ ಮಹಾತ್ಮಾನಃ ಸಂಸಿದ್ಧಿಂ ಪರಮಾಂ ಗತಾಃ ॥೧೫॥

ಮಾಮ್ ಉಪೇತ್ಯ ಪುನಃ ಜನ್ಮ ದುಃಖ ಆಲಯಮ್ ಅಶಾಶ್ವತಮ್ ।
ನ ಅಪ್ನುವಂತಿ ಮಹಾ ಆತ್ಮಾನಃ ಸಂಸಿದ್ಧಿಮ್ ಪರಮಾಮ್ ಗತಾಃ –ಹಿರಿಯ ಸಿದ್ಧಿಯನ್ನು ಪಡೆದ ಇಂತಹ ಜೀವಗಳು ನನ್ನನ್ನು ಪಡೆದ ಮೇಲೆ ದುಗುಡಗಳ ನೆಲೆಯಾದ ನಾಲ್ಕು ದಿನದ ಈ ಸಂಸಾರದಲ್ಲಿ ಮರಳಿ ಹುಟ್ಟಿ ಬರುವುದಿಲ್ಲ.

ಸಾಧನೆಯ ಮೂಲಕ ಸಿದ್ಧಿಯನ್ನು ಪಡೆದು ಭಗವಂತನನ್ನು ಸೇರಿದ ಜೀವರು ಎಂದೂ ದುಃಖಮಾಯವಾದ ಮತ್ತು ಅಶಾಶ್ವತವಾದ ಈ ಸಂಸಾರದಲ್ಲಿ ಮರಳಿ ಹುಟ್ಟುವುದಿಲ್ಲ. "ನನ್ನನ್ನು ಬಂದು ಸೇರುವವರು ಪುಣ್ಯಾತ್ಮರು. ಜಗತ್ತಿನಲ್ಲಿ, ಜೀವನದ ಸಾಧನೆಯಲ್ಲಿ ಅತ್ಯಂತ ಶ್ರೇಷ್ಠವಾದ ಸಿದ್ಧಿ ಎಂದರೆ ಭಗವಂತನ ಸಾಕ್ಷಾತ್ಕಾರ. ಅದನ್ನು ಪಡೆದವರು ಮತ್ತೆ ಸಂಸಾರದ ಬಂಧದಲ್ಲಿ ಸಿಲುಕಿ ಒದ್ದಾಡುವ ಅಗತ್ಯವಿಲ್ಲ" ಎನ್ನುತ್ತಾನೆ ಕೃಷ್ಣ .

ಆ ಬ್ರಹ್ಮಭುವನಾಲ್ಲೋಕಾಃ ಪುನರಾವರ್ತಿನೋಽರ್ಜುನ ।
ಮಾಮುಪೇತ್ಯ ತು ಕೌಂತೇಯ ಪುನರ್ಜನ್ಮ ನ ವಿದ್ಯತೇ ॥೧೬॥

ಆ ಬ್ರಹ್ಮಭುವನಾತ್ ಲೋಕಾಃ ಪುನಃ ಆವರ್ತಿನಃ ಅರ್ಜುನ ।
ಮಾಮ್ ಉಪೇತ್ಯ ತು ಕೌಂತೇಯ ಪುನಃ ಜನ್ಮ ನ ವಿದ್ಯತೇ –ಅರ್ಜುನಾ, ಬ್ರಹ್ಮ ಲೋಕದ ತನಕದ ಎಲ್ಲಾ ಲೋಕಗಳಿಂದಲೂ ಮರಳಿ ಬರಲೇಬೇಕು. ಕೌಂತೇಯಾ, ನನ್ನನ್ನು ಪಡೆದಾಗ ಮಾತ್ರ ಮರುಹುಟ್ಟು ಇಲ್ಲ.

ಬ್ರಹ್ಮ ಲೋಕದಿಂದ ಹಿಡಿದು ಇತರ ಎಲ್ಲಾ ಲೋಕಗಳಿಗೂ ಒಂದು ದಿನ ನಾಶವಿದೆ. ಚತುರ್ಮುಖ ಬ್ರಹ್ಮನ ಆಯುಸ್ಸು 31,104,000,0000000(ಮೂವತ್ತೊಂದು ಸಾವಿರದ ನೂರಾ ನಾಲ್ಕು ಸಾವಿರ ಕೋಟಿ) ವರ್ಷ. ಇದು ಭಗವಂತನಿಗೆ ಒಂದು ಹಗಲಿನಂತೆ! ಭಗವಂತ ಕಾಲಾತೀತ. ಆದ್ದರಿಂದ ಕೃಷ್ಣ ಹೇಳುತ್ತಾನೆ "ನನ್ನನ್ನು ಪಡೆದಾಗ ಮಾತ್ರ ಮರುಹುಟ್ಟು ಇಲ್ಲ" ಎಂದು.

ಸಹಸ್ರಯುಗಪರ್ಯಂತಮಹರ್ಯದ್ ಬ್ರಹ್ಮಣೋ ವಿದುಃ ।
ರಾತ್ರಿಂ ಯುಗಸಹಸ್ರಾಂತಾಂ ತೇಽಹೋರಾತ್ರವಿದೋ ಜನಾಃ॥೧೭॥

ಸಹಸ್ರ ಯುಗ ಪರ್ಯಂತಮ್ ಅಹಃ ಯತ್ ಬ್ರಹ್ಮಣಃ ವಿದುಃ ।
ರಾತ್ರಿಮ್ ಯುಗ ಸಹಸ್ರಾಂತಾಮ್ ತೇ ಅಹಃ ರಾತ್ರ ವಿದಃ ಜನಾಃ – ಸಾವಿರಾರು ಯುಗಗಳ ತನಕ ಭಗವಂತನ ಹಗಲು ಮತ್ತು ಸಾವಿರಾರು ಯುಗಗಳ ತನಕ ಇರುಳು ಎಂದು ತಿಳಿಯುತ್ತಾರೆ, ಅವರು ಹಗಲು-ಇರುಳು ಬಲ್ಲ ಜನರು.

ಭಗವಂತ ಕಾಲಾತೀತ ಆದರೂ ಕೂಡಾ ಆತನ ಅನುಸಂಧಾನಕ್ಕಾಗಿ ಆತನ ಸೃಷ್ಟಿ ಕಾಲವನ್ನು ಭಗವಂತನ ಹಗಲೆಂದೂ ಮತ್ತು ಪ್ರಳಯ ಕಾಲವನ್ನು ಭಗವಂತನ ರಾತ್ರಿ ಎಂದೂ ಕರೆಯುತ್ತಾರೆ. ಒಂದು ಸಾವಿರ ಯುಗಚಕ್ರದ ಆವೃತ್ತಿಗೆ ಒಂದು ಬ್ರಹ್ಮನ ದಿನ. ಯುಗಚಕ್ರ ಎಂದರೆ ಚತುರ್ಯುಗ- ಕಲಿಯುಗ 4,32,000 ವರ್ಷಗಳು; ದ್ವಾಪರ ಯುಗ 8,64,000 ವರ್ಷಗಳು; ತ್ರೇತಾಯುಗ 12,96,000 ವರ್ಷಗಳು; ಕೃತಯುಗ 17,28,000 ವರ್ಷಗಳು; ಒಟ್ಟಿಗೆ ಒಂದು ಯುಗಚಕ್ರ ಎಂದರೆ 43,20,000 ವರ್ಷಗಳು. ಇಂತಹ ಒಂದು ಸಾವಿರ ಯುಗ ಚಕ್ರಗಳು ಬ್ರಹ್ಮನ ಒಂದು ಹಗಲು. ಅಂದರೆ 432 ಕೋಟಿ ವರ್ಷ. ಆದ್ದರಿಂದ ಬ್ರಹ್ಮನ ಒಂದು ದಿನ ಅಂದರೆ 864 ಕೋಟಿ ವರ್ಷ. ಚತುರ್ಮುಖ ಬ್ರಹ್ಮನ ಆಯುಸ್ಸು ಅಥವಾ ಸತ್ಯಲೋಕದ ಆಯುಸ್ಸು 100 ವರ್ಷ. ಅಂದರೆ 864 ಕೋಟಿ X 360 X 100=31,104,000,0000000(ಮೂವತ್ತೊಂದು ಸಾವಿರದ ನೂರಾ ನಾಲ್ಕು ಸಾವಿರ ಕೋಟಿ) ವರ್ಷ. ಇದು ಭಗವಂತನ ಸೃಷ್ಟಿ ಕಾಲ(ಹಗಲು). ನಂತರ ಮಹಾಪ್ರಳಯ. ಈ ಮಹಾಪ್ರಳಯದ ಕಾಲ 31,104 ಸಾವಿರ ಕೋಟಿ ವರ್ಷ(ರಾತ್ರಿ). ಇದು ಭಗವಂತನ ಸೃಷ್ಟಿ ಮತ್ತು ಸಂಹಾರದ ಲೆಕ್ಕಾಚಾರ.

ಪ್ರಳಯಗಳಲ್ಲಿ ಮೂರು ವಿಧ. ೧. ಮನ್ವಂತರ ಪ್ರಳಯ; ೨. ದಿನಪ್ರಳಯ; ೩. ಮಹಾಪ್ರಳಯ. [ಈ ಮೂರು ಪ್ರಳಯಗಳಲ್ಲದೆ ಇನ್ನೂ ಅನೇಕ ಚಿಕ್ಕ ಪ್ರಳಯಗಳಾಗುತ್ತವೆ. ಆ ಪ್ರಳಯಗಳಲ್ಲಿ ಭೂಮಿಯ ಯಾವುದೋ ಒಂದು ಭಾಗ ನಾಶವಾಗಬಹುದು]. ಮನ್ವಂತರ ಪ್ರಳಯದಲ್ಲಿ ಭೂಮಿ ಪೂರ್ಣವಾಗಿ ನಾಶವಾಗುವುದಿಲ್ಲ-ಆದರೆ ನಾಗರೀಕತೆ ನಾಶವಾಗುತ್ತದೆ. ದಿನಪ್ರಳಯ ಚತುರ್ಮುಖ ಬ್ರಹ್ಮನ ರಾತ್ರಿ. ಅಂದರೆ ಪ್ರತೀ **432** ಕೋಟಿ ವರ್ಷಕ್ಕೊಮ್ಮೆ ದಿನಪ್ರಳಯ. ಈ ಪ್ರಳಯದಲ್ಲಿ ಭೂಮಿ ಪೂರ್ಣವಾಗಿ ನಾಶವಾಗುತ್ತದೆ. ಮಹಾಪ್ರಳಯ ಪ್ರತೀ **31,104** ಸಾವಿರ ಕೋಟಿ ವರ್ಷಕ್ಕೊಮ್ಮೆ ಹಾಗೂ ಈ ಪ್ರಳಯದಲ್ಲಿ ಸತ್ಯ ಲೋಕದಿಂದ ಹಿಡಿದು ಸರ್ವ ಲೋಕಗಳೂ ಸೂಕ್ಷ್ಮಾತಿ ಸೂಕ್ಷ್ಮ ಪರಮಾಣುವಿನ ರೂಪದಲ್ಲಿ ಭಗವಂತನಲ್ಲಿ ಲೀನವಾಗುತ್ತವೆ.

ಅವ್ಯಕ್ತಾದ್ ವ್ಯಕ್ತಯಃ ಸರ್ವಾಃ ಪ್ರಭವಂತ್ಯಹರಾಗಮೇ ।
ರಾತ್ರ್ಯಾಗಮೇ ಪ್ರಲೀಯಂತೇ ತತ್ರೈವಾವ್ಯಕ್ತಸಂಜ್ಞಕೇ ॥೧೮॥

ಅವ್ಯಕ್ತಾತ್ ವ್ಯಕ್ತಯಃ ಸರ್ವಾಃ ಪ್ರಭವಂತಿ ಅಹಃ ಆಗಮೇ ।
ರಾತ್ರಿ ಆಗಮೇ ಪ್ರಲೀಯಂತೇ ತತ್ರ ಏವ ಅವ್ಯಕ್ತ ಸಂಜ್ಞಕೇ –ಕಾಣದ ಭಗವಂತನಿಂದ ಕಾಣುವ ಎಲ್ಲವೂ ಹಗಲಾದಾಗ ರೂಪುಗೊಳ್ಳುತ್ತವೆ, ಇರುಳಾದಾಗ ಅದೇ ಕಾಣದ ಭಗವಂತನಲ್ಲಿ ಕಣ್ಮರೆಯಾಗುತ್ತವೆ.

ಮಹಾಪ್ರಳಯ ಕಾಲದಲ್ಲಿ ಅವ್ಯಕ್ತನಾದ ಭಗವಂತನಲ್ಲಿ ವ್ಯಕ್ತವಾಗಿರುವ ಈ ಪ್ರಪಂಚ ಪರಮಾಣುವಿನ ರೂಪದಲ್ಲಿ ಸೇರಿಕೊಳ್ಳುತ್ತದೆ. ಪುನಃ ಸೃಷ್ಟಿ ಕಾಲದಲ್ಲಿ ಮರಳಿ ಸೂಕ್ಷ್ಮ ರೂಪದಿಂದ ಸ್ಥೂಲ ರೂಪವನ್ನು ಪಡೆದು ವ್ಯಕ್ತವಾಗುತ್ತವೆ.

ಭೂತಗ್ರಾಮಃ ಸ ಏವಾಯಂ ಭೂತ್ವಾಭೂತ್ವಾ ಪ್ರಲೀಯತೇ ।
ರಾತ್ರ್ಯಾಗಮೇಽವಶಃ ಪಾರ್ಥ ಪ್ರಭವತ್ಯಹರಾಗಮೇ ॥೧೯॥

ಭೂತ ಗ್ರಾಮಃ ಸಃ ಏವ ಅಯಮ್ ಭೂತ್ವಾಭೂತ್ವಾ ಪ್ರಲೀಯತೇ ।
ರಾತ್ರಿ ಆಗಮೇ ಅವಶಃ ಪಾರ್ಥ ಪ್ರಭವತಿ ಅಹಃ ಆಗಮೇ -ಪಾರ್ಥಾ, ಅದೇ ಪಂಚಭೂತಗಳ ಗುಂಪು ಮರಳಿಮರಳಿ ಹುಟ್ಟಿ ಇರುಳಾದಾಗ ಭಗವಂತನ ವಶದಲ್ಲಿ ಲಯಗೊಳ್ಳುತ್ತದೆ; ಹಗಲಾದಾಗ ಹುಟ್ಟುತ್ತದೆ.

ಸೃಷ್ಟಿಯ ಮೂಲದ್ರವ್ಯ ಎಂದೂ ಬದಲಾಗುವುದಿಲ್ಲ. ಅದೇ ಪಂಚಭೂತಗಳು ಮರಳಿಮರಳಿ ಸೃಷ್ಟಿ-ಸಂಹಾರ ಚಕ್ರದಲ್ಲಿ ಸುತ್ತುತ್ತಿರುತ್ತವೆ. ಈ ಚಕ್ರದಲ್ಲಿ ಮೋಕ್ಷ ಯೋಗ್ಯವಲ್ಲದ ಅನಂತ ಜೀವಗಳೂ ಸುತ್ತುತ್ತಿರುತ್ತವೆ. ಆದರೆ ಭಗವಂತನನ್ನು ಸೇರಿದ ಜೀವ ಈ ಚಕ್ರದಿಂದಾಚೆಗಿರುತ್ತದೆ.

ಪರಸ್ತಸ್ಮಾತ್ತು ಭಾವೋಽನ್ಯೋಽವ್ಯಕ್ತೋ ವ್ಯಕ್ತಾತ್ ಸನಾತನಃ ।
ಯಃ ಸ ಸರ್ವೇಷು ಭೂತೇಷು ನಶ್ಯತ್ಸು ನ ವಿನಶ್ಯತಿ ॥೨೦॥

ಪರಃ ತಸ್ಮಾತ್ ತು ಭಾವಃ ಅನ್ಯಃ ಅವ್ಯಕ್ತಃ ಅವ್ಯಕ್ತಾತ್ ಸನಾತನಃ ।
ಯಃ ಸಃ ಸರ್ವೇಷು ಭೂತೇಷು ನಶ್ಯತ್ಸು ನ ವಿನಶ್ಯತಿ –ಈ ಕಾಣುವ ವಿಶ್ವಕ್ಕಿಂತ ಬೇರೆಯಾಗಿ, ಮಿಗಿಲಾಗಿ ಎಂದೆಂದೂ ಇರುವ ತತ್ವವೇ ಅವ್ಯಕ್ತ. ಎಲ್ಲಾ ಭೂತಗಳು ಇಲ್ಲವಾದಾಗಲೂ ಅದು ಇರುತ್ತದೆ.

ಎಲ್ಲವನ್ನೂ ಮೀರಿ ನಿಂತ ಭಗವಂತ ಎಲ್ಲಕ್ಕಿಂತ ವಿಲಕ್ಷಣ ಮತ್ತು ಶ್ರೇಷ್ಠ. ಆತ ಸನಾತನ. ಎಲ್ಲಾ ಕಾಲದಲ್ಲೂ ನಿರ್ವಿಕಾರನಾಗಿರುವ, ಸರ್ವವೇದ ಪ್ರತಿಪಾದ್ಯ, ಸಮಸ್ತ ಚರಾಚರಾತ್ಮಕ ಪ್ರಪಂಚ ನಾಶವಾದಾಗಲೂ ನಾಶವಾಗದೇ ಎಲ್ಲವನ್ನೂ ತನ್ನಲ್ಲಿ ಲೀನವಾಗಿಸಿಕೊಂಡು ಇರುವ ಏಕಮಾತ್ರ ತತ್ವ ಭಗವಂತ.

ಅವ್ಯಕ್ತೋಽಕ್ಷರ ಇತ್ಯುಕ್ತಸ್ತಮಾಹುಃ ಪರಮಾಂ ಗತಿಮ್ ।
ಯಂ ಪ್ರಾಪ್ಯ ನ ನಿವರ್ತಂತೇ ತದ್ ಧಾಮ ಪರಮಂ ಮಮ ॥೨೧॥

ಅವ್ಯಕ್ತಃ ಅಕ್ಷರಃ ಇತಿ ಉಕ್ತಃ ತಮ್ ಆಹುಃ ಪರಮಾಮ್ ಗತಿಮ್ ।
ಯಮ್ ಪ್ರಾಪ್ಯ ನ ನಿವರ್ತಂತೇ ತತ್ ಧಾಮ ಪರಮಮ್ ಮಮ –ಈ ಅವ್ಯಕ್ತ ತತ್ವವನ್ನೇ 'ಅಕ್ಷರ' ನಾದ ಭಗವಂತನೆನ್ನುತ್ತಾರೆ. ಅವನೇ ಕೊನೆಯಾಸರೆ ಎನ್ನುತ್ತಾರೆ. ಅವನನ್ನು ಪಡೆದವರು ಮತ್ತೆ ಮರಳಿ ಬರುವುದಿಲ್ಲ. ಅದು ನನ್ನ ಹಿರಿದಾದ ಸ್ವರೂಪ.

ಎಲ್ಲರೂ ಹೋಗಿ ಸೇರಬೇಕಾದ ಸರ್ವಶ್ರೇಷ್ಠ ಸ್ಥಾನ ಈ ಅವ್ಯಕ್ತ ತತ್ವ. ಆತನೇ 'ಅಕ್ಷರ' ಶಬ್ದದ ಮುಖ್ಯಾರ್ಥ. ಎಂದೂ ನಾಶವಿಲ್ಲದ, ಎಲ್ಲಾ ಕಡೆ ವ್ಯಾಪಿಸಿರುವ, ಯಾರು ಏನು ಬಯಸಿದರೂ ಅದನ್ನು ಕೊಡತಕ್ಕ, ಸರ್ವಸಮರ್ಥ, ಇಂದ್ರಿಯಗಳ ಅನುಭವ ಕೊಡುವವ, ಸಮಸ್ತ ಶಬ್ದವಾಚ್ಯ-ಭಗವಂತ. ಅವನನ್ನು ಸೇರಿದರೆ ಮತ್ತೆ ಮರಳಿ ಸಂಸಾರದಲ್ಲಿ ಹುಟ್ಟಬೇಕಾಗಿಲ್ಲ. "ಅದು ನನ್ನ ಹಿರಿದಾದ ಸ್ವರೂಪ" ಎನ್ನುತ್ತಾನೆ ಕೃಷ್ಣ.

ಪುರುಷಃ ಸ ಪರಃ ಪಾರ್ಥ ಭಕ್ತ್ಯಾ ಲಭ್ಯಸ್ತ್ವನನ್ಯಯಾ ।
ಯಸ್ಯಾಂತಃಸ್ಥಾನಿ ಭೂತಾನಿ ಯೇನ ಸರ್ವಮಿದಂ ತತಮ್ ॥೨೨॥

ಪುರುಷಃ ಸಃ ಪರಃ ಪಾರ್ಥ ಭಕ್ತ್ಯಾ ಲಭ್ಯಃ ತು ಅನನ್ಯ ಯಾ ।
ಯಸ್ಯ ಅಂತಸ್ಥಾನಿ ಭೂತಾನಿ ಯೇನ ಸರ್ವಮ್ ಇದಮ್ ತತಮ್ –ಪಾರ್ಥಾ, ಆ ಪರಮ ಪುರುಷ ಅವನಿಗೇ ಮೀಸಲಾದ ಭಕ್ತಿಗೆ ಮಾತ್ರವೇ ಎಟುಕುವವನು. ಅವನ ಒಳಗೆ ಇಡಿಯ ವಿಶ್ವವಿದೆ. ಅವನು ಈ ಎಲ್ಲವನ್ನು ತಬ್ಬಿ ನಿಂತಿದ್ದಾನೆ.

ಈ ಬ್ರಹ್ಮಾಂಡ ಮತ್ತು ಪಿಂಡಾಂಡವೆಂಬ ಪುರದಲ್ಲಿದ್ದು ಎಲ್ಲವನ್ನೂ ನಿಯಂತ್ರಿಸುವ ಭಗವಂತ ಸರ್ವ ಶಬ್ದವಾಚ್ಯ. ಇಂತಹ ಭಗವಂತನನ್ನು ಒಲಿಸಿಕೊಳ್ಳಲು ಇರುವ ಏಕಮಾತ್ರ ಉಪಾಯ ಭಕ್ತಿ. ಭಕ್ತಿ ಇಲ್ಲದ ಯಾವ

ಕರ್ಮದಿಂದಲೂ ಆತನನ್ನು ಸೇರಲು ಸಾಧ್ಯವಿಲ್ಲ. ಭಗವಂತನ ಸಾಕ್ಷಾತ್ಕಾರ ಮತ್ತು ಮೋಕ್ಷಕ್ಕೆ ಏಕಮಾತ್ರ ಸಾಧನ ಅನನ್ಯವಾದ ಏಕಭಕ್ತಿ. ಪ್ರಳಯ ಕಾಲದಲ್ಲಿ ಎಲ್ಲವನ್ನೂ ತನ್ನ ಒಡಲಲ್ಲಿಟ್ಟು ರಕ್ಷಿಸಿ, ಸೃಷ್ಟಿ ಕಾಲದಲ್ಲಿ ಅಂತರ್ಯಾಮಿಯಾಗಿದ್ದು ಮಾಡಬೇಕಾದ ಕಾರ್ಯವನ್ನು ಮಾಡಿಸಿ, ಅನುದಿನ ಅನಂತ ಕಾಲದಲ್ಲಿ ಒಳಗೂ ಹೊರಗೂ ತುಂಬಿ ರಕ್ಷಣೆ ಮಾಡುವ ಆ ಭಗವಂತನನ್ನು ನಿರಂತರ ಪ್ರೀತಿಸು.

ಹೀಗೆ ಕೊನೆಗಾಲದಲ್ಲಿ ದೇಹ ತ್ಯಾಗ ಮಾಡುವಾಗ ಭಗವಂತನ ಧ್ಯಾನ ಹೇಗೆ ಮಾಡಬೇಕು ಎನ್ನುವ ಚಿತ್ರಣವನ್ನು ನಮ್ಮ ಮುಂದಿರಿಸಿದ ಕೃಷ್ಣ, ದೇಹದಿಂದ ಹೊರ ಬಂದ ಮೇಲೆ ಭಗವಂತನತ್ತ ಪ್ರಯಾಣಿಸುವ ದಾರಿಯ ಬಗ್ಗೆ ಈ ಅಧ್ಯಾಯದ ಮುಂದಿನ ಭಾಗದಲ್ಲಿ ವಿವರಿಸುತ್ತಾನೆ.

ಯತ್ರ ಕಾಲೇ ತ್ವನಾವೃತ್ತಿಮಾವೃತ್ತಿಂ ಚೈವ ಯೋಗಿನಃ ।
ಪ್ರಯಾತಾ ಯಾಂತಿ ತಂ ಕಾಲಂ ವಕ್ಷ್ಯಾಮಿ ಭರತರ್ಷಭ ॥೨೩॥

ಯತ್ರ ಕಾಲೇ ತು ಅನಾವೃತ್ತಿಮ್ ಆವೃತ್ತಿಮ್ ಚ ಏವ ಯೋಗಿನಃ ।
ಪ್ರಯಾತಾಃ ಯಾಂತಿ ತಮ್ ಕಾಲಮ್ ವಕ್ಷ್ಯಾಮಿ ಭರತ ಋಷಭ –ಭರತ ಶ್ರೇಷ್ಠಾ, ಯಾವ ಕಾಲದೇವತೆಗಳ ದಾರಿಯಲ್ಲಿ ಹೋದ ಸಾಧಕರು ಮರಳಿ ಬರುವುದಿಲ್ಲ ಮತ್ತು ಯಾವ ದಾರಿಯಲ್ಲಿ ಮರಳಿಬರುತ್ತಾರೆ ಅಂತಹ ಕಾಲದೇವತೆಗಳನ್ನು ಹೇಳುತ್ತೇನೆ.

"ಶರೀರವನ್ನು ತ್ಯಾಗ ಮಾಡಿದ(ಕಾಲ ವಶನಾದ) ಜೀವನನ್ನು ಯಾವಯಾವ ದೇವತೆಗಳು ನಿಯಮನ ಮಾಡಿ ಮುಂದೆ ಕರೆದುಕೊಂಡು ಹೋಗುತ್ತಾರೆ; ಯಾವ ದಾರಿಯಲ್ಲಿ ಹೋದವರು ಮರಳಿ ಭೂಮಿಯಲ್ಲಿ ಹುಟ್ಟುತ್ತಾರೆ ಮತ್ತು ಯಾರು ನೇರವಾಗಿ ಮೋಕ್ಷವನ್ನು ತಲುಪುತ್ತಾರೆ, ಆ ವಿಷಯವನ್ನು ನಿನಗೆ ಹೇಳುತ್ತೇನೆ" ಎನ್ನುತ್ತಾನೆ ಕೃಷ್ಣ. ಇಲ್ಲಿ ಕೆಲವರು ಕಾಲ ಎನ್ನುವ ಪದವನ್ನೂ ತಪ್ಪಾಗಿ ತಿಳಿದುಕೊಳ್ಳುತ್ತಾರೆ. ಈ ಶ್ಲೋಕದಲ್ಲಿ ಕೃಷ್ಣ ಹೇಳುವ ಕಾಲ ಅಂದರೆ ಸಮಯವಲ್ಲ. ಶರೀರ ತ್ಯಾಗ ಮಾಡಿದ ಜೀವದ ನಿಯಮನ ಮಾಡುವ ದೇವತೆಗಳ ಗಣ 'ಕಾಲ'.

ಅಗ್ನಿರ್ಜ್ಯೋತಿರಹಃ ಶುಕ್ಲಃ ಷಣ್ಮಾಸಾ ಉತ್ತರಾಯಣಮ್ ।
ತತ್ರ ಪ್ರಯಾತಾ ಗಚ್ಛಂತಿ ಬ್ರಹ್ಮ ಬ್ರಹ್ಮವಿದೋ ಜನಾಃ ॥೨೪॥

ಅಗ್ನಿಃ ಜ್ಯೋತಿಃ ಅಹಃ ಶುಕ್ಲಃ ಷಟ್ ಮಾಸಾಃ ಉತ್ತರ ಅಯನಮ್।
ತತ್ರ ಪ್ರಯಾತಾಃ ಗಚ್ಛಂತಿ ಬ್ರಹ್ಮ ಬ್ರಹ್ಮವಿದಃ ಜನಾಃ –ಅಗ್ನಿ ಮತ್ತು ಜ್ಯೋತಿ [ಎಂಬಿಬ್ಬರು ವಹ್ನಿಯ ಮಕ್ಕಳು].[ಮಧ್ಯಾಹ್ನದ ದೇವತೆಯ ಜತೆ] ಹಗಲಿನ ದೇವತೆ, [ಹುಣ್ಣಿಮೆಯ ದೇವತೆ ಜತೆ] ಶುಕ್ಲಪಕ್ಷದ ದೇವತೆ , ಉತ್ತರಾಯಣದ ಆರು ತಿಂಗಳ ದೇವತೆಗಳು, [ಸಂಕ್ರಾಂತಿಯ ದೇವತೆಯ ಜತೆ] ಉತ್ತರಾಯಣದ ದೇವತೆ- ಈ ದಾರಿಯಲ್ಲಿ ಹೋದವರು ಭಗವಂತನನ್ನು ಬಲ್ಲವರು ಭಗವಂತನನ್ನು ಸೇರುತ್ತಾರೆ; ಮತ್ತೆ ಮರಳುವುದಿಲ್ಲ.

ದೇಹದಿಂದ ಹೊರಬಂದ ಮೋಕ್ಷ ಯೋಗ್ಯ ಜೀವವನ್ನು ಮೊದಲು ಸ್ವಾಗತಿಸುವವರು ವೈಶ್ವಾನರ(ಪ್ರಧಾನ ಅಗ್ನಿ)ನ ಮಕ್ಕಳಾದ ಅಗ್ನಿ ಮತ್ತು ಜ್ಯೋತಿ. ಈ ದೇವತೆಗಳು ಜೀವನನ್ನು ಸತ್ಕರಿಸಿ ಮುಂದಕ್ಕೆ ಕಳುಹಿಸುತ್ತಾರೆ. ಮುಂದೆ ಜೀವನನ್ನು ಬೆಳಕಿನ ಮತ್ತು ಮಧ್ಯಾಹ್ನದ ದೇವತೆಗಳು ಸ್ವಾಗತಿಸುತ್ತಾರೆ. ಈ ನಿಜವಾದ ಬೆಳಕಿನ ಅನುಭವದೊಂದಿಗೆ ಜೀವ ಮುಂದೆ ಸಾಗಿ ಶುಕ್ಲಪಕ್ಷದ ಮತ್ತು ಹುಣ್ಣಿಮೆಯ ದೇವತೆಯನ್ನು ತಲುಪುತ್ತಾನೆ. ಆ ನಂತರ ಸಂಕ್ರಮಣದ, ಉತ್ತರಾಯಣದ ದೇವತೆ ಜೊತೆಗೆ ಉತ್ತರಾಯಣದ ಆರು ತಿಂಗಳ ದೇವತೆಗಳು ಜೀವನನ್ನು ಭಗವಂತನೆಡೆಗೆ ಕಳುಹಿಸುತ್ತಾರೆ. ಹೀಗೆ ಯಾರು ಈ ದಾರಿಯಲ್ಲಿ ಸಾಗುತ್ತಾರೋ ಅವರು ಎಂದೂ ಮರಳಿ ಬರುವುದಿಲ್ಲ-ನಿತ್ಯ ಸತ್ಯವಾದ ಭಗವಂತನನ್ನು ಸೇರುತ್ತಾರೆ.

ಧೂಮೋ ರಾತ್ರಿಸ್ತಥಾ ಕೃಷ್ಣಃ ಷಣ್ಮಾಸಾ ದಕ್ಷಿಣಾಯನಮ್ ।
ತತ್ರ ಚಾಂದ್ರಮಸಂ ಜ್ಯೋತಿರ್ಯೋಗೀ ಪ್ರಾಪ್ಯ ನಿವರ್ತತೇ ॥೨೫॥

ಧೂಮಃ ರಾತ್ರಿಃ ತದಾ ಕೃಷ್ಣಃ ಷಟ್ ಮಾಸಾ ದಕ್ಷಿಣಾಯನಮ್ ।
ತತ್ರ ಚಾಂದ್ರಮಸಮ್ ಜ್ಯೋತಿಃ ಯೋಗೀ ಪ್ರಾಪ್ಯ ನಿವರ್ತತೇ –ಹೊಗೆಯ ದೇವತೆ, ಇರುಳ ದೇವತೆ, ಕೃಷ್ಣಪಕ್ಷದ ದೇವತೆ, ದಕ್ಷಿಣಾಯನದ ಆರು ತಿಂಗಳ ದೇವತೆಗಳು, ಮತ್ತು ದಕ್ಷಿಣಾಯನದ ದೇವತೆ-ಈ ದಾರಿಯಲ್ಲಿ ಸಾಗಿದ ಸಾಧಕ ಚಂದ್ರನ ಬೆಳಕಿನ ಲೋಕವನ್ನು ಸೇರಿ ಮರಳಿ ಬರುತ್ತಾನೆ.

ಮೋಕ್ಷ ಯೋಗ್ಯವಲ್ಲದ ಜೀವ ದೇಹದಿಂದ ಹೊರ ಬಂದಾಗ ಆತನನ್ನು ಸ್ವಾಗತಿಸುವ ದೇವತೆ ಹೊಗೆಯ ಮತ್ತು ಕತ್ತಲಿನ ದೇವತೆ. ಆ ನಂತರ ಕೃಷ್ಣಪಕ್ಷದ ದೇವತೆ; ನಂತರ ದಕ್ಷಿಣಾಯನದ ಮತ್ತು 'ದಕ್ಷಿಣಾಯನದ ಆರು ತಿಂಗಳ' ದೇವತೆಗಳು ಜೀವನನ್ನು ಸೋಮಲೋಕಕ್ಕೆ ತಲುಪಿಸುತ್ತಾರೆ. ಜೀವ ಇಲ್ಲಿ ತನ್ನ ಪುಣ್ಯ ಕ್ಷಯವಾಗುವ ತನಕ ಸುಖವನ್ನು ಅನುಭವಿಸಿ, ಮರಳಿ ಮೋಡದಲ್ಲಿ ಸೇರಿ, ಮಳೆಯ ಮೂಲಕ ಭೂಮಿಯನ್ನು ತಲುಪಿ, ಒಂದು ಗಂಡಿನ ದೇಹದ ಮೂಲಕ ಹೆಣ್ಣಿನ ಗರ್ಭವನ್ನು ಪ್ರವೇಶಿಸಿ, ಮರಳಿ ಭೂಮಿಯಲ್ಲಿ ಹುಟ್ಟುತ್ತದೆ.

ಶುಕ್ಲಕೃಷ್ಣೇ ಗತೀ ಹ್ಯೇತೇ ಜಗತಃ ಶಾಶ್ವತೇ ಮತೇ ।
ಏಕಯಾ ಯಾತ್ಯನಾವೃತ್ತಿಮನ್ಯಯಾऽऽವರ್ತತೇ ಪುನಃ ॥೨೬॥

ಶುಕ್ಲ ಕೃಷ್ಣೇ ಗತೀ ಹಿ ಏತೇ ಜಗತಃ ಶಾಶ್ವತೇ ಮತೇ ।
ಏಕಯಾ ಯಾತಿ ಅನಾವೃತ್ತಿಮ್ ಅನ್ಯಯಾ ಆವರ್ತತೇ ಪುನಃ –ಇವು ಜಗದ ಬಿಳಿ ಮತ್ತು ಕಪ್ಪು ದಾರಿಗಳು. ಅನುಗಾಲ ಇರುವಂತವು ಎಂದು ಶಾಸ್ತ್ರದ ತೀರ್ಮಾನ. ಒಂದರಿಂದ ಮರಳಿ ಬರುವುದಿಲ್ಲ. ಇನ್ನೊಂದರಿಂದ ಮತ್ತೆ ಮರಳುತ್ತಾನೆ.

ಹೀಗೆ ಒಂದು ಮೋಕ್ಷಕ್ಕೆ ಹೋಗುವ ಬೆಳಕಿನ ಬಿಳಿಯ ದಾರಿ ಮತ್ತು ಇನ್ನೊಂದು ಮರಳಿ ಸಂಸಾರಕ್ಕೆ ಬರುವ ಕತ್ತಲಿನ ಕಪ್ಪು ದಾರಿ. ಈ ಎರಡೂ ದಾರಿಗಳು ಅನಾದಿ ಅನಂತ ಕಾಲದಲ್ಲಿ ಎಲ್ಲಾ ಜೀವಗಳಿಗೆ ಸಮನಾಗಿ ಇರತಕ್ಕಂತಹ ವ್ಯವಸ್ಥೆ. ಬೆಳಕಿನ ದಾರಿಯಲ್ಲಿ ಹೋದವ ಮರಳಿ ಬರುವುದಿಲ್ಲ, ಕತ್ತಲೆಯ ದಾರಿಯಲ್ಲಿ ಹೋದವ ಮರಳಿ ಬರುತ್ತಾನೆ.

ನೈತೇ ಸೃತೀ ಪಾರ್ಥ ಜಾನನ್ ಯೋಗೀ ಮುಹ್ಯತಿ ಕಶ್ಚನ ।
ತಸ್ಮಾತ್ ಸರ್ವೇಷು ಕಾಲೇಷು ಯೋಗಯುಕ್ತೋ ಭವಾರ್ಜುನ ॥೨೭॥

ನ ಏತೇ ಸೃತೀ ಪಾರ್ಥ ಜಾನನ್ ಯೋಗೀ ಮುಹ್ಯತಿ ಕಶ್ಚನ ।
ತಸ್ಮಾತ್ ಸರ್ವೇಷು ಕಾಲೇಷು ಯೋಗಯುಕ್ತಃ ಭವ ಅರ್ಜುನ- ಪಾರ್ಥಾ, ಈ ದಾರಿಗಳನ್ನರಿತ ಯಾವ ಸಾಧಕನೂ ದಾರಿ ತಪ್ಪುವುದಿಲ್ಲ. ಆದ್ದರಿಂದ, ಓ ಅರ್ಜುನಾ, ಎಲ್ಲಾ ಕಾಲಗಳಲ್ಲೂ ಉಪಾಯವನ್ನರಿತು ನಡೆ.

ಈ ಎರಡೂ ದಾರಿಗಳ ಬಗ್ಗೆ ಸರಿಯಾದ ತಿಳುವಳಿಕೆ ಇದ್ದು, ನೀನು ಹೋಗಬೇಕಾದ ದಾರಿ ಯಾವುದು ಎಂದು ತಿಳಿದು, ಆಯಾ ಅಭಿಮಾನಿ ದೇವತೆಗಳ ಜೊತೆಗೆ ಮುಂದಕ್ಕೆ ಸಾಗಬೇಕು. ಆಯಾ ಅಭಿಮಾನಿ ದೇವತೆಗಳು ಬೇರೆಬೇರೆ ಮೆಟ್ಟಲಿನಲ್ಲಿ ಬಂದು ಜೀವನನ್ನು ಮುಂದಕ್ಕೆ ಕರೆದುಕೊಂಡು ಹೋಗುತ್ತಾರೆ. ಈ ಕಾರಣದಿಂದ ಅಂತ್ಯ ಕಾಲದ ಸ್ಮರಣೆಯಲ್ಲಿ ಮಾರ್ಗ ಮತ್ತು ಅಭಿಮಾನಿ ದೇವತೆಗಳ ಚಿಂತನೆ ಅತ್ಯಗತ್ಯ. ಇದನ್ನು ತಿಳಿದು ಅನುಸಂಧಾನ ಮಾಡಿಕೊಂಡು ಅನುಷ್ಠಾನ ಮಾಡಿದರೆ ಯಾವ ಸಾಧಕನಿಗೂ ಗೊಂದಲವಿಲ್ಲ. ಆದ್ದರಿಂದ ಕೃಷ್ಣ ಅರ್ಜುನನಿಗೆ ಹೇಳುತ್ತಾನೆ – "ಎಲ್ಲಾ ಕಾಲದಲ್ಲೂ ಈ ಉಪಾಯವನ್ನರಿತು ನಡೆ" ಎಂದು.

ವೇದೇಷು ಯಜ್ಞೇಷು ತಪಸ್ಸು ಚೈವ ದಾನೇಷು ಯತ್ ಪುಣ್ಯಫಲಂ ಪ್ರದಿಷ್ಟಮ್ ।
ಅತ್ಯೇತಿ ತತ್ ಸರ್ವಮಿದಂ ವಿದಿತ್ವಾಯೋಗೀ ಪರಂ ಸ್ಥಾನಮುಪೈತಿ ಚಾಽದ್ಯಮ್ ॥೨೮॥

ವೇದೇಷು ಯಜ್ಞೇಷು ತಪಸ್ಸು ಚ ಏವ ದಾನೇಷು ಯತ್ ಪುಣ್ಯಫಲಮ್ ಪ್ರದಿಷ್ಟಮ್ ।
ಅತ್ಯೇತಿ ತತ್ ಸರ್ವಮ್ ಇದಮ್ ವಿದಿತ್ವಾ ಯೋಗೀ ಪರಮ್ ಸ್ಥಾನಮ್ ಉಪೈತಿ ಚ ಆದ್ಯಮ್ –ವೇದವನ್ನು ಓದಿದರೆ, ಯಜ್ಞಗಳನ್ನು ಮಾಡಿದರೆ, ತಪಗಳನ್ನು ಆಚರಿಸಿದರೆ, ದಾನಗಳನ್ನು ನೀಡಿದರೆ ಏನು ಪುಣ್ಯಫಲ ಹೇಳಲಾಗಿದೆಯೋ ಅದನ್ನೆಲ್ಲಾ ಮೀರಿ ನಿಲ್ಲುತ್ತಾನೆ ಇದನ್ನು ಬಲ್ಲ ಸಾಧಕ; ಎಲ್ಲಕ್ಕೂ ಮೊದಲ ಹಿರಿಯ ತಾಣವನ್ನು ಸೇರುತ್ತಾನೆ.

ಉಪಸಂಹಾರ ಮಾಡುತ್ತಾ ಕೃಷ್ಣ ಹೇಳುತ್ತಾನೆ-ಎಲ್ಲಕ್ಕಿಂತ ಮಿಗಿಲಾದ ತಿಳಿವು ಅಂದರೆ ಈ ಅಂತ್ಯ ಕಾಲದ ಅರಿವು ಎಂದು . ಸಮಸ್ತ ಶಾಸ್ತ್ರದಲ್ಲಿ ಯಜ್ಞ-ದಾನ-ತಪಸ್ಸುಗಳ ಮೂಲಕ ಏನು ಪುಣ್ಯ ಹೇಳಿದ್ದಾರೆ, ಈ ಅಂತ್ಯ ಕಾಲದ ಸಾವಿನ ರಹಸ್ಯದ ಅರಿವು ಈ ಎಲ್ಲಾ ಪುಣ್ಯ ಫಲವನ್ನು ಮೀರಿ ನಿಲ್ಲುತ್ತದೆ. ಆದ್ದರಿಂದ ಎಲ್ಲಕ್ಕಿಂತ ದೊಡ್ಡ ಸಾಧನೆ ಅಂತ್ಯ ಕಾಲದ ಚಿಂತನೆ. ಈ ಕಾರಣದಿಂದ ಬದುಕಿಗಿಂತ ಸಾವಿನ ಬಗ್ಗೆ ಹೆಚ್ಚು ಚಿಂತನೆಯ ಅಗತ್ಯವಿದೆ.

ಸಾವು ಅಮಂಗಳವಲ್ಲ. ಸಾವು ದುಃಖದ ಅನುಭವ ಎನ್ನುವುದು ನಮ್ಮ ಭ್ರಮೆ. ದೇಹದ ಒಳಗಿರುವಾಗ ಭೌತಿಕ ಶರೀರದ ಎಲ್ಲಾ ಯಾತನೆ ಜೀವಕ್ಕೆ ಅಂಟಿಕೊಂಡಿರುತ್ತದೆ. ಸಾವು ಎಂದರೆ ಈ ಸ್ಥೂಲ ಶರೀರದಿಂದ ಬಿಡುಗಡೆ. ಆದ್ದರಿಂದ ಸೂಕ್ಷ್ಮ ಶರೀರದಲ್ಲಿರುವ ಜೀವ ಪಂಜರದಿಂದ ಹೊರ ಬಂದು ಮುಕ್ತವಾಗಿ ಆಕಾಶದಲ್ಲಿ ಹಾರಾಡುವ ಪಕ್ಷಿಯಂತೆ. ಈ ಕಾರಣದಿಂದ ಸಾವಿನ ಭಯ ಬಿಟ್ಟು ಕೊನೇ ಕ್ಷಣದಲ್ಲಿ ಮಾಂಗಲಿಕವಾಗಿ ಎತ್ತರಕ್ಕೇರುವ ದೇವತಾ ಅನುಸಂಧಾನ ನಿರಂತರವಾಗಿ ನಮ್ಮ ಬದುಕಿನಲ್ಲಿರಬೇಕು.

ಇತಿ ಅಷ್ಟಮೋಧ್ಯಾಯಃ

ಎಂಟನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಒಂಬತ್ತು

ಜ್ಞಾನ ಎಂದರೆ ಭಗವಂತನ ಅರಿವು(Spiritual wisdom). ಎಲ್ಲವನ್ನು ತಿಳಿದ ಭಗವಂತನೆಡೆಗೆ ನಮ್ಮ ಮನಸ್ಸು ಹರಿಯುವುದು ಜ್ಞಾನ. ಭಗವಂತ ಸರ್ವೋತ್ತಮ, ಸರ್ವಗತ, ಸರ್ವಜ್ಞ, ಇತ್ಯಾದಿಯಾಗಿ ತಿಳಿಯುವುದು ಜ್ಞಾನ. ಆ ನಂತರ ಅದರ ವಿವರಗಳ ಅರಿವು ವಿಜ್ಞಾನ(ವಿಶಿಷ್ಟವಾದ ಜ್ಞಾನ). ಭಗವಂತ ಗುಣಪೂರ್ಣ ಎನ್ನುವುದು ಜ್ಞಾನ. ಭಗವಂತ ಜ್ಞಾನಪೂರ್ಣ, ಆನಂದಪೂರ್ಣ, ಸೌಂದರ್ಯಪೂರ್ಣ, ದಯಾಪೂರ್ಣ, ಹೀಗೆ ಒಂದೊಂದು ಗುಣಗಳ ಪೂರ್ಣತೆಯನ್ನು ವಿವರವಾಗಿ ಅನುಸಂಧಾನ ಮಾಡುವುದು ವಿಜ್ಞಾನ(exclusive wisdom of God). ನಾವು ದೇವರನ್ನು ಪೂರ್ಣವಾಗಿ ಅರಿಯಲು ಸಾಧ್ಯವಿಲ್ಲ. ಆದರೆ ಪ್ರತಿಯೊಂದು ಜೀವನಿಗೆ ಒಂದು ವಿಶಿಷ್ಟವಾದಂತಹ ಅರಿವಿನ ಮಟ್ಟವಿರುತ್ತದೆ. ಎಲ್ಲರೂ ಒಂದೇ ರೀತಿ ತಿಳಿದುಕೊಳ್ಳಲು ಬರುವುದಿಲ್ಲ. ಅವರವರ ಮಟ್ಟಕ್ಕೆ ತಕ್ಕಂತೆ ಭಗವಂತನನ್ನು ಅರಿಯುವುದು ವಿಜ್ಞಾನ(individual exclusive wisdom of God ). ಹೀಗೆ ಭಗವಂತ ಸರ್ವೋತ್ತಮ ಎಂದು ತಿಳಿದುಕೊಳ್ಳುವುದು ಜ್ಞಾನವಾದರೆ, ಆ ಸರ್ವೋತ್ತಮ ತತ್ವವನ್ನು ವಿವರವಾಗಿ ಅದರ ಬೇರೆ ಬೇರೆ ಮುಖಗಳಿಂದ ಅವರವರ ಯೋಗ್ಯತೆಗೆ ತಕ್ಕಂತೆ ಅನುಸಂಧಾನ ಮಾಡುವುದು ವಿಜ್ಞಾನ. ಹೀಗೆ ಅನುಸಂಧಾನ ಮಾಡುವುದರಿಂದ ಭಗವಂತ ಎಲ್ಲವುದಕ್ಕಿಂತ ವಿಲಕ್ಷಣ ಎನ್ನುವ ಸತ್ಯದ ಸಾಕ್ಷಾತ್ಕಾರವಾಗುತ್ತದೆ.

ಕೃಷ್ಣ ಏಳನೇ ಅಧ್ಯಾಯದಲ್ಲಿ ಅರ್ಜುನನಿಗೆ ಹೇಳಿದ್ದ- "ತಿಳಿಯಬೇಕಾದ ನನ್ನ ಹಿರಿಮೆಯನ್ನು ಅದರ ಬಿತ್ತರದ ಜತೆಗೆ ನಿನಗೆ ನಾನು ಪೂರ್ತಿಯಾಗಿ ಹೇಳುತ್ತೇನೆ. ಇದನ್ನು ತಿಳಿದರೆ ಮತ್ತೆ ಈ ವಿಷಯದಲ್ಲಿ ಬೇರೆ ತಿಳಿಯುವಂತಹದ್ದೇನೂ ಉಳಿದಿರುವುದಿಲ್ಲ" ಎಂದು (ಅ-೭ , ಶ್ಲೋ-೨). ಮತ್ತೆ ಇಲ್ಲಿ ಈ ಅಧ್ಯಾಯದಲ್ಲಿ ಪುನಃ ಜ್ಞಾನ ವಿಜ್ಞಾನದ ಬಗ್ಗೆ ವಿವರಿಸುತ್ತಾನೆ! ಏಕೆ ಹೀಗೆ? ಹಿಂದೆ ಹೇಳಿದ್ದನ್ನು ಕೃಷ್ಣ ಮರೆತು ಪುನಃ ವಿವರಿಸುತ್ತಿದ್ದಾನೋ?! ಅಲ್ಲ, ಅದಕ್ಕೆ ಕಾರಣಗಳಿವೆ. ಒಮ್ಮೆ ಹೇಳಿದ್ದನ್ನು ಮತ್ತೆ ಏಕೆ ಹೇಳುತ್ತಿದ್ದಾನೆ ಎಂದರೆ 'ಬೇರೆಬೇರೆ ಆಯಾಮದಲ್ಲಿ ಹೇಳುವುದಕ್ಕೋಸ್ಕರ'. ಆದ್ದರಿಂದ ಇಲ್ಲಿ ಹೇಳುವುದು ಹಿಂದೆ ಹೇಳಿದುದರ ವಿವರಣೆ ಮತ್ತು ಸ್ಪಷ್ಟೀಕರಣ. ಸಂಕ್ಷಿಪ್ತವಾಗಿ ಅಲ್ಲಿ ವಿವರಿಸಿದ್ದನ್ನು ಇಲ್ಲಿ ಕೆಲವು ಹೊಸ ಅರ್ಥಗಳಿಂದ ಇನ್ನೊಂದು ರೀತಿಯಲ್ಲಿ ಕೃಷ್ಣ ವಿವರಿಸುತ್ತಾನೆ. ಭಗವಂತನ ತತ್ವ ಚಿಂತನೆಯನ್ನು ಒಂದು ಬಾರಿ ಮಾಡಿದರೆ ನಮ್ಮ ತಲೆಯೊಳಗೆ ಹೋಗುವುದಿಲ್ಲ! ನಿರಂತರ ಚಿಂತನೆ ಮಾಡುತ್ತಾ ಇದ್ದರೆ ಎಲ್ಲೋ ಸ್ವಲ್ಪ ಒಳಗೆ ಹೋಗುತ್ತದೆ! ಕೇಳಿದಾಗ, ಓದಿದಾಗ ಎಲ್ಲವೂ ತಿಳಿಯಿತು ಅನಿಸುತ್ತದೆ. ಆದರೆ ಸ್ವಲ್ಪ ಹೊತ್ತಿನ ನಂತರ ಒಂದೂ ನೆನಪಾಗುವುದಿಲ್ಲ! ಅದಕ್ಕೋಸ್ಕರ ಆವೃತ್ತಿ ಮಾಡುತ್ತಾ ಬೇರೆಬೇರೆ ಆಯಾಮದಲ್ಲಿ ಚಿಂತನೆ ಮಾಡಬೇಕು. ಈ ಅಧ್ಯಾಯದಲ್ಲಿ ಕೃಷ್ಣ ಹಿಂದೆ ಹೇಳಿದ್ದ ಜ್ಞಾನ-ವಿಜ್ಞಾನವನ್ನು ನಮಗೆ ಅರ್ಥವಾಗುವ ರೀತಿಯಲ್ಲಿ ಬೇರೆಬೇರೆ ಮುಖಗಳಿಂದ ಬೇರೆಬೇರೆ ಆಯಾಮದಲ್ಲಿ ವಿವರಿಸುತ್ತಾನೆ.

ಒಬ್ಬ ಸೈನಿಕನಾಗಿ ಯುದ್ಧರಂಗದಲ್ಲಿ ನಿಂತಿರುವ ವ್ಯಕ್ತಿಯ ಮಾನಸಿಕ ಸ್ಥಿತಿ ಅಧ್ಯಾತ್ಮ ಚಿಂತನೆಗೆ ಬಹಳ ಹತ್ತಿರವಾಗಿರುತ್ತದೆ. ಈ ಕಾರಣದಿಂದ ಯುದ್ಧರಂಗದಲ್ಲಿ ಕೃಷ್ಣ ಅಧ್ಯಾತ್ಮವನ್ನು ಬಿಚ್ಚುತ್ತಾನೆ. ಅರ್ಜುನ ಬಹಳ ದೊಡ್ಡ ಜ್ಞಾನಿ. ಸದಾ ಭಗವದ್ ಚಿಂತನೆಯಲ್ಲಿ ಇರತಕ್ಕಂತಹ ದೇವಾಂಶಸಂಭೂತ. ಅದರ ಜೊತೆಗೆ ಆತನನ್ನು ಯುದ್ಧರಂಗದಲ್ಲಿ ನಿಲ್ಲಿಸಿ, ಮಾನಸಿಕವಾಗಿ ಹುಟ್ಟು ಸಾವುಗಳ ಈ ಲೀಲೆಯ ಆಚೆಗೆ ಅವನನ್ನು ಕರೆದೊಯ್ದು,

ಮಾನಸಿಕವಾಗಿ ಅಣಿಗೊಳಿಸಿ-ಕೃಷ್ಣ ವೇದಾಂತವನ್ನು ಹೇಳುತ್ತಾನೆ. ಇಂತಹ ಕ್ಷಣದಲ್ಲಿ ಭಗವಂತನ ಬಗೆಗೆ ಹೇಳಿದರೆ ಬಹುಬೇಗ ಹೃದಯ ತುಂಬಿಕೊಳ್ಳುತ್ತದೆ. ನಾವಾದರೂ ಅಷ್ಟೇ, ನಮ್ಮ ದೈನಂದಿನ ಜೀವನದಲ್ಲಿ ಸರಿ-ತಪ್ಪು, ಧರ್ಮಾಧರ್ಮಗಳ ಸಂಘರ್ಷ ನಡೆಯುತ್ತಲೇ ಇರುತ್ತದೆ. ಅಂತಹ ಯುದ್ಧದ ಸಂದರ್ಭದಲ್ಲೇ ನಮಗೆ ಅಧ್ಯಾತ್ಮ ಅರ್ಥವಾಗುವುದು.

ಭಗವಾನುವಾಚ ।
ಇದಂ ತು ತೇ ಗುಹ್ಯತಮಂ ಪ್ರವಕ್ಷ್ಯಾಮ್ಯನಸೂಯವೇ।
ಜ್ಞಾನಂ ವಿಜ್ಞಾನಸಹಿತಂ ಯಜ್ ಜ್ಞಾತ್ವಾ ಮೋಕ್ಷ್ಯಸೇಽಶುಭಾತ್ ॥೧॥

ಭಗವಾನ್ ಉವಾಚ-ಭಗವಂತ ಹೇಳಿದನು:
ಇದಮ್ ತು ತೇ ಗುಹ್ಯತಮಮ್ ಪ್ರವಕ್ಷ್ಯಾಮಿ ಅನಸೂಯವೇ।
ಜ್ಞಾನಮ್ ವಿಜ್ಞಾನ ಸಹಿತಮ್ ಯತ್ ಜ್ಞಾತ್ವಾ ಮೋಕ್ಷ್ಯಸೇ ಅಶುಭಾತ್- ಇದಂತೂ ತುಂಬಾ ಬಚ್ಚಿಡಬೇಕಾದದ್ದು. ಕಿಚ್ಚು ಪಡದೆ ಮೆಚ್ಚುವವನೆಂದು ಹೇಳುತ್ತಿದ್ದೇನೆ: ತಿಳಿವು ಮತ್ತು ತಿಳಿವಿನ ಬಿತ್ತರ. ಇದನ್ನು ತಿಳಿದು ಕುತ್ತಿನಿಂದ ಪಾರಾಗುವೆ.

ಕೃಷ್ಣ ಹೇಳುತ್ತಾನೆ: "ಭಗವದ್ ತತ್ವದ ಬಗೆಗೆ ನಿನಗೆ ಪುನಃ ಹೇಳುತ್ತೇನೆ; ಅತ್ಯಂತ ರಹಸ್ಯವಾದ ಉಪಾಸನೆ ಸಂಗತಿಯನ್ನು ನಿನ್ನ ಮುಂದೆ ಬಿಚ್ಚಿಡುತ್ತಿದ್ದೇನೆ" ಎಂದು. ಇದು ಎಲ್ಲರ ಮುಂದೆ ತೆರೆದಿಡುವ ಸಂಗತಿಯಲ್ಲ. ಯಾರಿಗೆ ಭಗವಂತನ ಉಪಾಸನೆಯಲ್ಲಿ ಅನನ್ಯವಾದ ಕಾತರ ಇರುವರರಿಗೆ, ಭಗವಂತನಲ್ಲದೆ ನನಗೆ ಇನ್ನೇನೂ ಬೇಡ ಎನ್ನುವ ಮನಸ್ಸುಳ್ಳವರಿಗೆ ಮತ್ತು ಭಗವಂತನಿಗೋಸ್ಕರ ಹಾತೊರೆಯುವವರ ಮುಂದೆ ಹೇಳಬೇಕಾದ ಮಾತು. ಅತ್ಯಂತ ರಹಸ್ಯವಾದ ಗೋಪನೆ ಮಾಡಬೇಕಾದ ಸಂಗತಿ. "ಅದನ್ನು ನಾನು ನಿನಗೆ ಹೇಳುತ್ತಿದ್ದೇನೆ" ಎನ್ನುತ್ತಾನೆ ಕೃಷ್ಣ. ಇಲ್ಲಿ ಅರ್ಜುನನಿಗೆ ಈ ವಿಚಾರವನ್ನು ತಿಳಿಯುವ ಜಿಜ್ಞಾಸೆ ಮತ್ತು ಅರ್ಹತೆ ಇದ್ದುದರಿಂದ ಕೃಷ್ಣ ಆತನಿಗೆ ಈ ಗೋಪ್ಯವಾದ ವಿಚಾರವನ್ನು ಹೇಳುತ್ತಾನೆ. ಕೇಳುವ ಅರ್ಹತೆ ಮತ್ತು ಬಯಕೆ ಇದ್ದವರಿಗೆ ಮಾತ್ರ ಕೊಡಬೇಕಾದ ವಿದ್ಯೆ ಇದು. ಇದನ್ನು ಎಲ್ಲರಿಗೂ ಕೊಡಲಾಗುವುದಿಲ್ಲ.

ಇಲ್ಲಿ ಕೃಷ್ಣ "ಅನಸೂಯವೇ" ಎನ್ನುವ ಪದವನ್ನು ಬಳಸಿದ್ದಾನೆ. ಮನುಷ್ಯನಿಗೆ ವೇದಾಂತ ಓದುವ ಮತ್ತು ವೇದಾಂತ ಓದಿದ ನಂತರವೂ ಇರಬೇಕಾದ ಗುಣ(Quality)-'ಅಹಂಕಾರ ರಹಿತತೆ'(egolessness). ಅಹಂಕಾರ ಇದ್ದು ವೇದಾಂತ ಓದಿದರೆ ಏನೂ ಉಪಯೋಗವಿಲ್ಲ. ವೇದಾಂತ ಓದುವ ಮೊದಲು ಅಹಂ ಇರಬಾರದು. "ಭಗವಂತನ ಮುಂದೆ ನಾನು ಏನೂ ಅಲ್ಲ" ಎಂದು ತಿಳಿದಿದ್ದರೆ ಅಹಂಕಾರ ಬರುವುದಿಲ್ಲ. ವೇದಾಂತ ಓದಿ 'ನಾನು ದೊಡ್ಡ ಜ್ಞಾನಿ' ಅನ್ನುವ ಅಹಂಕಾರ ಬಂದರೆ- ಓದಿ ದೇವರನ್ನು ಕಳೆದುಕೊಂಡಂತಾಗುತ್ತದೆ. ಆದರೆ ಇಂದು ನಾವು ಒಂದಲ್ಲ ಒಂದು ಅಹಂಕಾರಕ್ಕೆ ಒಳಗಾಗಿರುತ್ತೇವೆ. ಜ್ಞಾನದ ಅಹಂಕಾರ, ಅಧಿಕಾರದ ಅಹಂಕಾರ, ಸಂಪತ್ತಿನ ಅಹಂಕಾರ, ಸೌಂದರ್ಯದ ಅಹಂಕಾರ, ಯೌವನದ ಅಹಂಕಾರ, ಇಂತಹ ಅನೇಕ ಸಂಗತಿಗಳು ನಮ್ಮನ್ನು ಕಾಡುತ್ತಿರುತ್ತವೆ. ಅದನ್ನು ಕಳಚಿಕೊಂಡಾಗ ಮಾತ್ರ ವೇದಾಂತವನ್ನು ಅರಿಯಲು ನಾವು ಅರ್ಹತೆ

ಪಡೆದಂತಾಗುತ್ತದೆ. ಎಲ್ಲಿಯ ತನಕ ನಮ್ಮಲ್ಲಿ ಅಹಂಕಾರ ತುಂಬಿದೆಯೋ ಅಲ್ಲಿಯ ತನಕ ವೇದಾಂತ ನಮಗೆ ಉಪಯೋಗಕ್ಕೆ ಬರುವುದಿಲ್ಲ.

ಎಲ್ಲಾ ಅಹಂಕಾರಕ್ಕಿಂತ ಜ್ಞಾನದ ಅಹಂಕಾರ ಬಹಳ ಅಪಾಯಕಾರಿ. ಇತರ ಅಹಂಕಾರಕ್ಕೆ ಕೊನೆ ಇದೆ, ಆದರೆ ಜ್ಞಾನದ ಅಹಂಕಾರಕ್ಕೆ ಕೊನೆ ಇಲ್ಲ. 'ನಾನು ಪಂಡಿತ' ಎನ್ನುವ ಅಹಂಕಾರ ತಲೆಗೆ ಬಂದರೆ ಅಂತವನು ಮಹಾ ದರಿದ್ರ ಎನಿಸುತ್ತಾನೆ! ಅಹಂಕಾರದ ಮರಿ 'ಅಸೂಯೆ'. ಈ ಅಸೂಯೆ ನಮ್ಮನ್ನು ಸುಡುವ ಬೆಂಕಿ. ಅದಕ್ಕಾಗಿ ಅದನ್ನು ಕನ್ನಡದಲ್ಲಿ 'ಹೊಟ್ಟೆಕಿಚ್ಚು' ಎನ್ನುತ್ತಾರೆ. ಇದು ನಮ್ಮ ವ್ಯಕ್ತಿತ್ವವನ್ನು ನಾಶ ಮಾಡುತ್ತದೆ. ಅಂತವರಿಗೆ ವೇದಾಂತ ಹೇಳಿ ಉಪಯೋಗವಿಲ್ಲ. " ನಿನಗೆ ಅಸೂಯೆ ಇಲ್ಲ, ಅದಕ್ಕಾಗಿ ನಿನಗೆ ಈ ಗೋಪ್ಯವನ್ನು ಹೇಳುತ್ತಿದ್ದೇನೆ" ಎನ್ನುತ್ತಾನೆ ಕೃಷ್ಣ.

ಯುದ್ಧ ರಂಗದಲ್ಲಿ ನಿಂತ ವ್ಯಕ್ತಿಗೆ ಅಸೂಯೆ ಇಲ್ಲದೇ ಇರುವುದು ಅತ್ಯಂತ ಮಹಾನ್ ಸಂಗತಿ. ದ್ವೇಷ-ಅಸೂಯೆ ಅಹಂಕಾರಗಳು ಯುದ್ಧರಂಗದಲ್ಲಿ ಸದಾ ತುಂಬಿ ತುಳುಕುತ್ತಿರುತ್ತವೆ. ಇದನ್ನು ಗೆದ್ದು ನಿಂತವ ಅತ್ಯಂತ ಶ್ರೇಷ್ಠ. ಇಲ್ಲಿ ಕೃಷ್ಣ ಹೇಳುತ್ತಾನೆ: "ಇದನ್ನು ತಿಳಿದುಕೊಂಡರೆ ನಿನ್ನ ಮನಸ್ಸು ಪರಿಶುದ್ಧವಾಗಿ ಭಗವಂತನನ್ನು ಬಯಸುವುದು ಸಾಧ್ಯವಾಗುತ್ತದೆ" ಎಂದು. ಜ್ಞಾನ ಬಂದರೆ ನಮ್ಮೊಳಗಿನ ಕೊಳೆ ತೊಳೆದು ಹೋಗಿ ಮನಸ್ಸು ನಿರ್ಮಲವಾಗುತ್ತದೆ. ನಮ್ಮ ಅತಿ ದೊಡ್ಡ ಸಂಪತ್ತು ಎಂದರೆ ಪ್ರಸನ್ನವಾದ ಸ್ವಚ್ಛ ಮನಸ್ಸು. ಅಂತಹ ಮನಸ್ಸಿನಲ್ಲಿ ಭಗವಂತ ಕಾಣಿಸಿಕೊಳ್ಳುತ್ತಾನೆ. ಅಹಂಕಾರ-ಅಸೂಯೆ ಇಲ್ಲದ ಮನಸ್ಸು 'ವಸುದೇವ' ಹಾಗೂ ಇಂತಹ ಮನಸ್ಸಿಗೆ ಕಾಣುವ ಭಗವಂತ 'ವಾಸುದೇವ'. ಶುದ್ಧ ಮನಸ್ಸಿನಿಂದ ಜ್ಞಾನ, ಜ್ಞಾನದಿಂದ ಆನಂದ. ಆನಂದಮಯವಾದ ಈ ಸ್ಥಿತಿಯಿಂದ ಪಾಂಚಭೌತಿಕ ಶರೀರದಿಂದ ಮತ್ತು ಸಂಸಾರದಿಂದ ಬಿಡುಗಡೆ ಹಾಗೂ ಮೋಕ್ಷ.

ನಮಗೆ ಪಾಂಚಭೌತಿಕವಾದ ಮೂರು ಆವರಣವಿದೆ. ಈ ಮೂರು ಆವರಣದ ಒಳಗೆ ಜ್ಞಾನಾನಂದಮಯವಾದ ಆತ್ಮಸ್ವರೂಪವಿದೆ. ಲಿಂಗಶರೀರ, ಸೂಕ್ಷ್ಮಶರೀರ ಮತ್ತು ಸ್ಥೂಲಶರೀರ ಇವು ಆತ್ಮವನ್ನು ಆವರಿಸಿರುವ ಆವರಣಗಳು. ನಾವು ಈ ಮೂರೂ ಅಂಗಿಗಳನ್ನು ಕಳಚಿ, ಅಶುಭದಿಂದ ಬಿಡುಗಡೆಹೊಂದಿ, ಸ್ವರೂಪಭೂತವಾದ ನೈಜ ಸ್ಥಿತಿಯಲ್ಲಿ ಭಗವಂತನ ಮುಂದೆ ನಿಲ್ಲುವುದನ್ನು ಇಲ್ಲಿ ಕೃಷ್ಣ 'ಮೋಕ್ಷ್ಯಸೇಽಶುಭಾತ್' ಎಂದು ಸಂಕ್ಷಿಪ್ತವಾಗಿ ಹೇಳಿದ್ದಾನೆ.[ನಾವು ದೇವಸ್ಥಾನದಲ್ಲಿ ದೇವರ ಮುಂದೆ ಅಂಗಿ ತೆಗೆಯುವುದು- 'ಭಗವಂತನ ಮುಂದೆ ಹಾಕಿಕೊಂಡಿರುವ ಎಲ್ಲಾ ಆವರಣವನ್ನು ತೆಗೆದು ದೇವರ ಮುಂದೆ ಬತ್ತಲಾಗುವುದು' ಎನ್ನುವ ಮುಖ್ಯಾರ್ಥವನ್ನು ಹೊಂದಿದೆ. ನಾವು ಭಗವಂತನ ಮುಂದೆ ಹಾಕಿಕೊಂಡ ಎಲ್ಲಾ ಮುಖವಾಡವನ್ನು ಬಿಚ್ಚಿ ಆತನ ಮುಂದೆ ತೆರೆದುಕೊಳ್ಳಬೇಕು. ಆಗ ಆತ ನಮಗೆ ತೆರೆದುಕೊಳ್ಳುತ್ತಾನೆ.] ಹೀಗೆ ಯಾವ ರೀತಿ ಪಾಂಚಭೌತಿಕ ಶರೀರದಿಂದ ಬಿಡುಗಡೆ ಮತ್ತು ಮೋಕ್ಷ ಎನ್ನುವ ಜ್ಞಾನ-ವಿಜ್ಞಾನವನ್ನು ಭಗವಂತ ಸಮಷ್ಠಿಯಾಗಿ ಅರ್ಜುನನಿಗೆ ಹೇಳುವುದನ್ನುಮುಂದಿನ ಶ್ಲೋಕಗಳಲ್ಲಿ ನೋಡೋಣ.

ರಾಜವಿದ್ಯಾ ರಾಜಗುಹ್ಯಂ ಪವಿತ್ರಮಿದಮುತ್ತಮಮ್ ।
ಪ್ರತ್ಯಕ್ಷಾವಗಮಂ ಧರ್ಮ್ಯಂ ಸುಸುಖಂ ಕರ್ತುಮವ್ಯಯಮ್ ॥೨॥

ರಾಜವಿದ್ಯಾ ರಾಜಗುಹ್ಯಮ್ ಪವಿತ್ರಮ್ ಇದಮ್ ಉತ್ತಮಮ್ ।
ಪ್ರತ್ಯಕ್ಷ ಅವಗಮಮ್ ಧರ್ಮ್ಯಮ್ ಸು ಸುಖಮ್ ಕರ್ತುಮ್ ಅವ್ಯಯಮ್-ಇದು ಅರಿವುಗಳ ಅರಸ. ಗುಟ್ಟುಗಳ ಗುಟ್ಟು. ಮಿಗಿಲಾದ ಅಪ್ಪಟ. ಕಣ್ಣಲ್ಲಿ ಕೂತವನ ಕಾಣಿಸುವ ದಾರಿ. ಎಲ್ಲಾ ಹೊತ್ತವನನ್ನು ಕುರಿತಾದ್ದು. ಆಚರಿಸಲು ಆರಾಮ. ಅಳಿವಿಲ್ಲದ್ದು.

ಕೃಷ್ಣ ತಾನು ಮುಂದೆ ಉಪದೇಶ ಮಾಡಲಿರುವ ಅಧ್ಯಾತ್ಮ ವಿಜ್ಞಾನದ ಬಗ್ಗೆ ಹೇಳುತ್ತಾ ಹೇಳುತ್ತಾನೆ: "ಇದು ವಿದ್ಯೆಗಳಲ್ಲೆಲ್ಲಾ ಪ್ರಧಾನ ವಿದ್ಯೆ; ಅತ್ಯಂತ ರಹಸ್ಯವಾದ ಮತ್ತು ಪರಮ ಪವಿತ್ರವಾದ ವಿದ್ಯೆ" ಎಂದು. 'ಪ್ರತ್ಯಕ್ಷ' ಶಬ್ದವಾಚ್ಯನಾದ(ಇಂದ್ರಿಯ ನಿಯಾಮಕನಾಗಿರುವ ) ಭಗವಂತನನ್ನು ಪ್ರತ್ಯಕ್ಷ ತೋರಿಸುವಂತಹ; ಜಗತ್ತಿನ ಧಾರಕ ಶಕ್ತಿಯಾದ ಭಗವಂತನನ್ನು ನೇರ ವಿಷಯೀಕರಿಸುವ, ಸಾಕ್ಷಾತ್ ಭಗವದ್ ವಿಷಯಕವಾದ ವಿದ್ಯೆ. ಈ ವಿದ್ಯೆಯನ್ನು ತಿಳಿದು ಭಗವಂತನನ್ನು ಒಲಿಸಿಕೊಳ್ಳುವುದು ಬಹಳ ಸುಲಭ. ಏಕೆಂದರೆ ಭಗವಂತನಿಗೆ ಅತ್ಯಂತ ಪ್ರಿಯವಾದದ್ದು ಜ್ಞಾನ. ಭಗವಂತ ಜ್ಞಾನಕ್ಕೆ ಒಲಿದಷ್ಟು ಸುಲಭವಾಗಿ ಯಾವ ದಾರಿಗೂ ಒಲಿಯುವುದಿಲ್ಲ. "ಇದು ಅಳಿವಿರದ ದಾರಿ" ಎನ್ನುತ್ತಾನೆ ಕೃಷ್ಣ. ಆದ್ದರಿಂದ ಜ್ಞಾನದ ದಾರಿ ಎಂದೂ ವ್ಯರ್ಥವಲ್ಲ.

ಅಶ್ರದ್ದಧಾನಾಃ ಪುರುಷಾ ಧರ್ಮಸ್ಯಾಸ್ಯ ಪರಂತಪ ।
ಅಪ್ರಾಪ್ಯ ಮಾಂ ನಿವರ್ತಂತೇ ಮೃತ್ಯುಸಂಸಾರವರ್ತ್ಮನಿ ॥೩॥

ಅಶ್ರದ್ದಧಾನಾಃ ಪುರುಷಾಃ ಧರ್ಮಸ್ಯ ಅಸ್ಯ ಪರಂತಪ ।
ಅಪ್ರಾಪ್ಯ ಮಾಮ್ ನಿವರ್ತಂತೇ ಮೃತ್ಯು ಸಂಸಾರ ವರ್ತ್ಮನಿ -- ಪರಂತಪಾ, ಈ ನಡೆಯ ಬಗೆಗೆ ನಂಬಿಕೆಯಿಡದ ಮಂದಿ ನನ್ನನ್ನು ಪಡೆಯದೆ ಸಾವಿನ ಸುಳಿಯಾದ ಬಾಳ ದಾರಿಯಲ್ಲಿ ಜಾರಿಬೀಳುತ್ತಾರೆ.

ಹಿಂದೆ ಅಸೂಯೆ ಬಗ್ಗೆ ಹೇಳಿದ್ದ ಕೃಷ್ಣ ಇಲ್ಲಿ ಇನ್ನೊಂದು ಅತೀ ಮುಖ್ಯವಾದ ಗುಣದ ಬಗ್ಗೆ ಹೇಳುತ್ತಾನೆ- ಅದೇ 'ಶ್ರದ್ಧೆ'. ಯಾರಿಗೆ ಶ್ರದ್ಧೆ ಇಲ್ಲವೋ ಅವರಿಗೆ ಏನನ್ನು ಹೇಳಿಯೂ ಉಪಯೋಗವಿಲ್ಲ. ನಮಗೆ ಯಾವುದರ ಮೇಲೆ ಶ್ರದ್ಧೆ ಇಲ್ಲವೋ ಅದನ್ನು ನಮ್ಮ ಮನಸ್ಸು ಸ್ವೀಕರಿಸುವುದೇ ಇಲ್ಲ. ಒಂದು ವಿಷಯವನ್ನು ನಾವು ಗ್ರಹಣ ಮಾಡಬೇಕಾದರೆ ನಮಗೆ ಆ ವಿಷಯದಲ್ಲಿ ಶ್ರದ್ಧೆ ಇರಬೇಕು. "ನನಗೆ ಗೊತ್ತಿಲ್ಲದ ವಿಷಯಗಳು ಇರಲು ಸಾಧ್ಯ, ಏಕೆಂದರೆ ನನಗೆ ಗೊತ್ತಿಲ್ಲದೇ ಇರುವ ಬಹಳ ಸಂಗತಿಗಳಿವೆ" –ಎಂದು ತಿಳಿಯುವುದು ಶ್ರದ್ಧೆಯ ಮೊದಲ ಮೆಟ್ಟಿಲು. **(I must know that I do not know).** ನಮ್ಮ ಅಜ್ಞಾನದ ಅರಿವು ನಮಗಿರಬೇಕು. ಆಗ ಗೊತ್ತಿಲ್ಲದ್ದನ್ನು ಗೊತ್ತು ಮಾಡಿಕೊಳ್ಳುವ ಶ್ರದ್ಧೆ ಬರುತ್ತದೆ. ಮೊದಲು ಗೊತ್ತಿಲ್ಲ ಅನ್ನುವುದರ ಬಗ್ಗೆ ನಮಗೆ ಗೊತ್ತಿರಬೇಕು; ಆಮೇಲೆ ನಮಗೆ ಗೊತ್ತಿಲ್ಲದೇ ಇರುವ ವಿಷಯ ಸತ್ಯವಾಗಿರುವ ಸಾಧ್ಯತೆ ಇದೆ ಎನ್ನುವ ಸಾಧ್ಯತೆಯ ಅರಿವು ಬೇಕು; ಅದನ್ನು ತಿಳಿಯುವ ಶ್ರದ್ಧೆ ಬೇಕು. ಹೀಗೆ ತಿಳಿಯುತ್ತಾ, ಗೊತ್ತಿಲ್ಲದ ವಸ್ತು ಇದೆ ಎನ್ನುವ ಸತ್ಯ ತಿಳಿಯುತ್ತದೆ.

ಜ್ಞಾನದ ದಾರಿಯಲ್ಲಿ ಸಾಗುವ ಸಾಧಕನಿಗೆ ಮೂಲಭೂತವಾಗಿ ನಂಬಿಕೆ ಬೇಕು. ನಂಬದವನ ಮುಂದೆ ಏನು ಹೇಳಿಯೂ ಪ್ರಯೋಜನವಿಲ್ಲ. ಇದನ್ನೇ ಇಲ್ಲಿ ಕೃಷ್ಣ ಹೇಳುತ್ತಾನೆ: "ಯಾರಿಗೆ ಶ್ರದ್ಧೆ ಇಲ್ಲವೋ ಅಂತವರ ಪಾಲಿಗೆ ಸತ್ಯ ಇಲ್ಲ" ಎಂದು. ಜಗತ್ತಿನ ಧಾರಕನಾದ ಭಗವಂತನ ಬಗೆಗೆ ನಂಬಿಕೆ ಇಲ್ಲದವರು ಭಗವಂತನನ್ನು ಸೇರುವುದಿಲ್ಲ. "ಅಂತವರು ಆತ್ಮ ನಾಶವಾದ ತಮಸ್ಸನ್ನು ಸೇರುತ್ತಾರೆ ಅಥವಾ ಸಂಸಾರದ ಸುಳಿಯಲ್ಲಿ ಸುತ್ತುತ್ತಿರುತ್ತಾರೆ" ಎನ್ನುತ್ತಾನೆ ಕೃಷ್ಣ.

ಈ ಶ್ಲೋಕದಲ್ಲಿ ಪರಂತಪ ಎನ್ನುವ ವಿಶೇಷಣವನ್ನು ಬಳಸಲಾಗಿದೆ. ಇದರ ಮೇಲ್ನೋಟದ ಅರ್ಥ ಶತ್ರುಗಳನ್ನು ಸುಡುವ ಶೂರ ಎಂದು. ನಮ್ಮ ಜೀವನ ಯುದ್ಧದಲ್ಲಿ ನಮ್ಮ ಶತ್ರುಗಳೆಂದರೆ ನಮ್ಮೊಳಗೆ ಇರುವ ಅಜ್ಞಾನ, ಮೋಹ, ಕಾಮ, ಕ್ರೋಧ, ಇತ್ಯಾದಿಗಳು. ಪ್ರತಿಯೊಬ್ಬ ಸಾಧಕ ಕೂಡಾ ಪರತತ್ವದಲ್ಲಿ ಶ್ರದ್ಧೆಯನ್ನಿಟ್ಟು ಇಂತಹ ಶತ್ರುಗಳನ್ನು ಸುಡುವ ಬೆಂಕಿಯಾಗಬೇಕು, ಸುಟ್ಟು ಬೆಳಗುವ ಪರಂತಪನಾಗಬೇಕು.

ಮಯಾ ತತಮಿದಂ ಸರ್ವಂ ಜಗದವ್ಯಕ್ತಮೂರ್ತಿನಾ ।
ಮತ್ ಸ್ಥಾನಿ ಸರ್ವಭೂತಾನಿ ನಚಾಹಂ ತೇಷ್ವವಸ್ಥಿತಃ ॥೪॥

ಮಯಾ ತತಮ್ ಇದಂ ಸರ್ವಂ ಜಗತ್ ಅವ್ಯಕ್ತ ಮೂರ್ತಿನಾ ।
ಮತ್ ಸ್ಥಾನಿ ಸರ್ವಭೂತಾನಿ ನ ಚ ಅಹಂ ತೇಷು ಅವಸ್ಥಿತಃ –ಈ ಎಲ್ಲಾ ಜಗತ್ತು ಮೈದೋರದ ನನ್ನಿಂದ ತುಂಬಿದೆ. ಇಲ್ಲಿ ಇರುವುದೆಲ್ಲವೂ ನನ್ನಲ್ಲಿ ನೆಲೆಸಿವೆ. ನಾನು ಅವುಗಳ ನೆರವಿನಲ್ಲಿಲ್ಲ.

ಕೃಷ್ಣ ಹೇಳುತ್ತಾನೆ: "ನಾನು ಇಡೀ ಜಗತ್ತಿನಲ್ಲಿ ತುಂಬಿರುವ ಅವ್ಯಕ್ತಮೂರ್ತಿ" ಎಂದು. ಇಲ್ಲಿ ಬಳಸಿರುವ ಅವ್ಯಕ್ತಮೂರ್ತಿ ಎನ್ನುವ ಪದದಲ್ಲಿ ಅವ್ಯಕ್ತ ಮತ್ತು ಮೂರ್ತಿ ಎನ್ನುವುದು ಪರಸ್ಪರ ವಿರುದ್ಧ ಪದಗಳು. ಅವ್ಯಕ್ತ ಎಂದರೆ ಕಾಣದ್ದು, ಆಕಾರವಿಲ್ಲದ್ದು. ಮೂರ್ತಿ ಎಂದರೆ ಆಕೃತಿ ಮತ್ತು ರೂಪ. ಭಗವಂತ ಆಕಾಶದಂತೆ ಎಲ್ಲೆಡೆ ವ್ಯಾಪಿಸಿರುವ ಅವ್ಯಕ್ತ ಆದರೆ ಆತ ಜ್ಞಾನಾನಂದಮಯನಾಗಿ ಎಲ್ಲರೊಳಗೆ ತುಂಬಿರುವ ಮೂರ್ತಿ. ಒಂದೊಂದು ವಸ್ತುವಿನಲ್ಲೂ ಒಂದೊಂದು ರೂಪದಲ್ಲಿ ತುಂಬಿರುವ ಅನಂತ ರೂಪಗಳುಳ್ಳವ ಆ ಭಗವಂತ. ಕೃಷ್ಣ ಹೇಳುತ್ತಾನೆ: "ಪ್ರತಿಯೊಂದು ವಸ್ತುವಿಗೂ ನಾನು ಆಧಾರ, ಈ ಇಡೀ ಪ್ರಪಂಚ ನನ್ನನ್ನು ಅವಲಂಬಿಸಿಕೊಂಡಿದೆ. ಆದರೆ ನಾನು ನಿರಾಲಂಬನಾಗಿ ಎಲ್ಲೆಡೆ ತುಂಬಿದ್ದೇನೆ". ಎಂದು.

ನಚ ಮತ್ ಸ್ಥಾನಿ ಭೂತಾನಿ ಪಶ್ಯ ಮೇ ಯೋಗಮೈಶ್ವರಮ್ ।
ಭೂತಭೃನ್ನ ಚ ಭೂತಸ್ಥೋ ಮಮಾಽತ್ಮಾ ಭೂತಭಾವನಃ ॥೫॥

ನ ಚ ಮತ್ ಸ್ಥಾನಿ ಭೂತಾನಿ ಪಶ್ಯ ಮೇ ಯೋಗಮ್ ಐಶ್ವರಮ್ ।

ಭೂತಭೃತ್ ನ ಚ ಭೂತಸ್ಥಃ ಮಮ ಆತ್ಮಾ ಭೂತಭಾವನಃ – ನನ್ನಲ್ಲಿ ಎಲ್ಲಾ ಉಂಟು; ನನಗಿಲ್ಲ ಯಾವುದರ ಅಂಟು. ನೋಡು-ಮಿಗಿಲಾದ ನನ್ನ ಮಹಿಮೆಯನ್ನು. ನನ್ನ ರೂಪ ಇವುಗಳಿಗೆ ರೂಪು ಕೊಟ್ಟಿದೆ. ಹೊತ್ತು ಸಲಹಿದೆ. ಆದರೂ ಇವುಗಳಲ್ಲಿಲ್ಲ.

ಹಿಂದಿನ ಮತ್ತು ಈ ಶ್ಲೋಕದಲ್ಲಿ ಕೃಷ್ಣ ಹೇಳುವ ವಿಚಾರವನ್ನು ನಾವು ಗಮನವಿಟ್ಟು ನೋಡಬೇಕು. ಮೇಲ್ನೋಟಕ್ಕೆ ಇವು ಒಂದೊಕ್ಕೊಂದು ವಿರುದ್ಧವಾಗಿರುವ ಒಗಟಿನ ಹೇಳಿಕೆಯಂತೆ ಕಾಣುತ್ತದೆ. ಕೃಷ್ಣ ಹೇಳುವ ಮಾತು ಹೀಗಿದೆ "ನನ್ನ ಸಾಮರ್ಥ್ಯವನ್ನು ತಿಳಿ, ನಾನು ಎಲ್ಲವುದರಲ್ಲೂ ಇದ್ದೇನೆ-ಆದರೆ ಯಾವುದರಲ್ಲೂ ಇಲ್ಲ. ಎಲ್ಲವೂ ನನ್ನಲ್ಲಿದೆ ಆದರೆ ಯಾವುದೂ ನನ್ನಲ್ಲಿಲ್ಲ". ಇದು ಭಗವಂತನ ಅಚಿಂತ್ಯ ಶಕ್ತಿಯ ಅನುಸಂಧಾನ. ಭಾಗವತದಲ್ಲಿ ಹೇಳುವಂತೆ 'ನಾವು ಯಾವುದನ್ನು ಪ್ರಪಂಚದಲ್ಲಿ ವಿರೋಧಾತ್ಮಕ(Contradictory) ಎನ್ನುತ್ತೇವೋ ಅವು ಶುಭ ಧರ್ಮವಾದಲ್ಲಿ ಭಗವಂತನಲ್ಲಿ ಅನ್ವಯವಾಗುತ್ತವೆ'. ಈ ವಿರುದ್ಧವಾದ ಧರ್ಮವನ್ನು ಹೇಳುವುದರ ಮೂಲಕ ಇಲ್ಲಿ ಭಗವಂತ ಏನನ್ನು ತಿಳಿಸುತ್ತಿದ್ದಾನೆ ಎಂದರೆ " ಎಲ್ಲವೂ ನನ್ನಲ್ಲಿದೆ ಆದರೆ ಯಾವ ಮಮಕಾರವೂ(Attachment)ನನಗಿಲ್ಲ". ಅಂದರೆ ಇದು ಭಗವಂತನ ನಿರ್ಲಿಪ್ತತೆಯನ್ನು ಸೂಚಿಸುತ್ತದೆ. ಆತ ಯಾವುದನ್ನೂ ಅಂಟಿಸಿಕೊಳ್ಳುವುದಿಲ್ಲ. ಆತ ಯಾವುದನ್ನೂ ಆಶ್ರಯಿಸಿಕೊಂಡಿಲ್ಲ ಮತ್ತು ಯಾವುದರ ಲೇಪವೂ ಆತನಿಗಿಲ್ಲ. ಕೃಷ್ಣ ಹೇಳುತ್ತಾನೆ: "ಇದು ನನ್ನ ಈಶ್ವರೀಯ ಶಕ್ತಿ" ಎಂದು. ಇದು ಭಗವಂತನ ಸರ್ವಸಮರ್ಥತೆ.

ಈ ವಿಚಾರವನ್ನು ಕೃಷ್ಣ ಇನ್ನೊಮ್ಮೆ ಸಂಕ್ಷಿಪ್ತ(Crisp)ವಾಗಿ "ಭೂತಭೃತ್ ನಚ ಭೂತಸ್ಥಃ" ಎಂದು ವಿವರಿಸುತ್ತಾನೆ. ಇಲ್ಲಿ 'ನಚ' ಎನ್ನುವ ಪದ ಹೊಸ್ತಿಲಲ್ಲಿ ಇಟ್ಟ ದೀಪದಂತೆ ಎರಡು ಪದಗಳ ನಡುವೆ ಬಳಕೆಯಾಗಿದೆ. ಇದರರ್ಥ ಹೀಗೆ: "ನಾನು ಭೂತಭೃತ್-ಎಲ್ಲಾ ಜೀವಜಾತಗಳನ್ನು ಧರಿಸಿದ್ದೇನೆ ಮತ್ತು ನಚಭೂತಭೃತ್-ಏನನ್ನೂ ಧರಿಸಿಲ್ಲ; ನಾನು ಭೂತಸ್ಥ-ಎಲ್ಲಾ ಜೀವಜಾತಗಳೂ ನನ್ನಲ್ಲಿವೆ ಮತ್ತು ನಾನು ನಚಭೂತಸ್ಥ-ಯಾವುದರಲ್ಲೂ ನಾನಿಲ್ಲ".

ಕೃಷ್ಣ ಹೇಳುತ್ತಾನೆ: "ಮಮ ಆತ್ಮಾ ಭೂತಭಾವನಃ" ಎಂದು. ಅಂದರೆ ಈ ಜಗತ್ತಿನ ಸೃಷ್ಟಿ-ಸ್ಥಿತಿ-ಸಂಹಾರ-ನಿಯಮನ-ಜ್ಞಾನ-ಅಜ್ಞಾನ-ಬಂಧ-ಮೋಕ್ಷ ಎಲ್ಲವೂ ಭಗವಂತನಿಂದ. ಆತ ಜ್ಞಾನಾನಂದ ಸ್ವರೂಪ. ಭಗವಂತ ಬೇರೆ ಆತನ ದೇಹ ಬೇರೆ ಅಲ್ಲ; ಆತನ ಗುಣ ಕ್ರಿಯೆಗಳು ಬೇರೆ ಅಲ್ಲ. ಅವೆಲ್ಲವೂ ಅಖಂಡ. ಇದನ್ನು ಪಾಂಚಭೌತಿಕ ಮತ್ತು ತ್ರೈಗುಣ್ಯದ ಪರಿದಿಯಲ್ಲಿ ನಾವು ಕಲ್ಪಿಸಲು ಸಾಧ್ಯವಿಲ್ಲ.

ಭಗವಂತ ಹೇಗೆ ಎಲ್ಲಾ ಕಡೆ ತುಂಬಿದ್ದಾನೆ ಎನ್ನುವುದನ್ನು ಕೃಷ್ಣ ಒಂದು ದೃಷ್ಟಾಂತದ ಮೂಲಕ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಯಥಾSSಕಾಶಸ್ಥಿತೋ ನಿತ್ಯಂ ವಾಯುಃ ಸರ್ವತ್ರಗೋ ಮಹಾನ್।
ತಥಾ ಸರ್ವಾಣಿ ಭೂತಾನಿ ಮತ್ ಸ್ಥಾನೀತ್ಯುಪಧಾರಯ ॥೬॥

ಯಥಾ ಆಕಾಶಸ್ಥಿತಃ ನಿತ್ಯಮ್ ವಾಯುಃ ಸರ್ವತ್ರ ಗಃ ಮಹಾನ್।
ತಥಾ ಸರ್ವಾಣಿ ಭೂತಾನಿ ಮತ್ ಸ್ಥಾನಿ ಇತಿ ಉಪಧಾರಯ –ಎಲ್ಲೆಡೆ ಹಿಗ್ಗಿ ತುಂಬಿರುವ ಗಾಳಿ ಎಂದೆಂದೂ ಆಗಸದಲ್ಲಿರುವಂತೆ ಜಗದ ಎಲ್ಲಾ ಇರುವಿಕೆಗಳೂ ನನ್ನಲ್ಲಿವೆ. ಎಂದು ಮನಗಾಣು.

ಗಾಳಿ ಎಲ್ಲಾ ಕಡೆ ಇದೆ. ಅದು ಒಳಗೂ ಇದೆ, ಹೊರಗೂ ಇದೆ. ಗಾಳಿ ನಮಗೆ ಕಾಣುವುದಿಲ್ಲ. ಗಾಳಿ ಈ ಆಕಾಶದಲ್ಲಿ ತುಂಬಿದೆ. ಹೀಗೆ ಭಗವಂತ ನಮ್ಮ ಒಳಗೂ ಹೊರಗೂ ತುಂಬಿ ನಿಂತಿದ್ದಾನೆ. ಆದರೆ ಯಾವುದರ ಲೇಪವೂ ಆತನಿಗಿಲ್ಲ. ಈ ಜಗತ್ತಿನ ಸರ್ವ ಇರುವಿಕೆಯೂ ಭಗವಂತನಲ್ಲಿದೆ.

ಸರ್ವಭೂತಾನಿ ಕೌಂತೇಯ ಪ್ರಕೃತಿಂ ಯಾಂತಿ ಮಾಮಿಕಾಮ್ ।
ಕಲ್ಪಕ್ಷಯೇ ಪುನಸ್ತಾನಿ ಕಲ್ಪಾದೌ ವಿಸೃಜಾಮ್ಯಹಮ್ ॥೭॥

ಸರ್ವಭೂತಾನಿ ಕೌಂತೇಯ ಪ್ರಕೃತಿಂ ಯಾಂತಿ ಮಾಮಿಕಾಮ್ ।
ಕಲ್ಪಕ್ಷಯೇ ಪುನಃ ತಾನಿ ಕಲ್ಪ ಆದೌ ವಿಸೃಜಾಮಿ ಅಹಮ್ -ಸೃಷ್ಟಿಯ ಕೊನೆಯಲ್ಲಿ ಎಲ್ಲಾ ವಸ್ತುಗಳೂ ನನ್ನದೇ ಆದ ಮೂಲ ಪ್ರಕೃತಿಯನ್ನು ಸೇರುತ್ತವೆ. ಸೃಷ್ಟಿಯ ಮೊದಲಲ್ಲಿ ಮರಳಿ ಅವನ್ನುನಾನು ನಿರ್ಮಿಸುತ್ತೇನೆ.

ಸೃಷ್ಟಿಯಾಗಿ 31,104 ಸಾವಿರ ಕೋಟಿ ವರ್ಷಗಳ ನಂತರ ಮಹಾಪ್ರಳಯ. ಇದು ಚತುರ್ಮುಖ ಬ್ರಹ್ಮನ ನೂರು ವರ್ಷ. ಇದನ್ನು ಕಲ್ಪಕ್ಷಯ ಎನ್ನುತ್ತಾರೆ. ಈ ಮಹಾಪ್ರಳಯದಲ್ಲಿ ಸತ್ಯಲೋಕದಿಂದ ಹಿಡಿದು ಪ್ರತಿಯೊಂದೂ ತನ್ನ ಸ್ಥೂಲ ರೂಪವನ್ನು ಕಳೆದುಕೊಂಡು ಸೂಕ್ಷ್ಮ ರೂಪದಲ್ಲಿ ಭಗವಂತನ ಅಧೀನವಾದ ಪ್ರಕೃತಿಯನ್ನು ಸೇರುತ್ತವೆ. ಎಲ್ಲಾ ಜೀವ ಜಾತಗಳೂ ಕೂಡಾ ತಮ್ಮ ಸ್ಥೂಲರೂಪವನ್ನು ಕಳೆದುಕೊಂಡು ಭಗವಂತನ ಉದರವನ್ನು ಸೇರುತ್ತದೆ. ಮತ್ತೆ 31,104 ಸಾವಿರ ಕೋಟಿ ವರ್ಷ ಪ್ರಳಯಕಾಲ. ನಂತರ ಮರಳಿ ಈ ಸೃಷ್ಟಿ ನಿರ್ಮಾಣವಾಗುತ್ತದೆ. ಅಂದರೆ ಮರಳಿ ಸೂಕ್ಷ್ಮರೂಪದಿಂದ ಸ್ಥೂಲರೂಪವನ್ನು ಪಡೆಯುತ್ತದೆ.

ಪ್ರಕೃತಿಂ ಸ್ವಾಮವಷ್ಟಭ್ಯ ವಿಸೃಜಾಮಿ ಪುನಃಪುನಃ ।
ಭೂತಗ್ರಾಮಮಿಮಂ ಕೃತ್ಸ್ನಮವಶಂ ಪ್ರಕೃತೇರ್ವಶಾತ್ ॥೮॥

ಪ್ರಕೃತಿಮ್ ಸ್ವಾಮ್ ಅವಷ್ಟಭ್ಯ ವಿಸೃಜಾಮಿ ಪುನಃಪುನಃ ।
ಭೂತ ಗ್ರಾಮಮ್ ಇಮಮ್ ಕೃತ್ಸ್ನಮ್ ಅವಶಮ್ ಪ್ರಕೃತೇಃ ವಶಾತ್ – ಪ್ರಕೃತಿಯ ನಿಯತಿಗೊಳಪಟ್ಟು ಪರತಂತ್ರವಾದ [ನನ್ನಂಕೆಯಲ್ಲಿರುವ] ಈ ಇಡಿಯ ವಿಶ್ವವನ್ನು ನನ್ನದೇ ಆದ ಪ್ರಕೃತಿಯನ್ನು ಬಳಸಿ ಮತ್ತೆ ಮತ್ತೆ ನಿರ್ಮಿಸುತ್ತೇನೆ.

ಪ್ರಳಯ ಕಾಲದಲ್ಲಿ ಸೂಕ್ಷ್ಮರೂಪದಲ್ಲಿ ಭಗವಂತನನ್ನು ಸೇರಿದ ಜಡ ಮತ್ತು ಜೀವವನ್ನು ಭಗವಂತ ತನ್ನ ಅಧೀನವಾದ ಪ್ರಕೃತಿಯನ್ನು ಬಳಸಿ ಮತ್ತೆ ಸೃಷ್ಟಿ ಮಾಡುತ್ತಾನೆ. ಭಗವಂತನ ಈ ಸೃಷ್ಟಿ ಮತ್ತು ಸಂಹಾರಚಕ್ರ ನಿರಂತರ. ಇಂತಹ ಅನಂತ ಬ್ರಹ್ಮಾಂಡಗಳು ಹಿಂದೆ ನಿರ್ಮಾಣವಾಗಿ ಸಂಹಾರವಾಗಿವೆ ಮತ್ತು ಇನ್ನೂ ಅನಂತ

ಕಾಲದಲ್ಲೂ ಇದು ಮುಂದುವರಿಯುತ್ತದೆ. ಈ ಕಾರಣಕ್ಕಾಗಿ ಭಗವಂತನನ್ನು ಅನಂತ ಕೋಟಿ ಬ್ರಹ್ಮಾಂಡನಾಯಕ ಎಂದು ಕರೆಯುತ್ತಾರೆ.(ಈ ಬಗ್ಗೆ ವಿವರವಾಗಿ ನಾವು ಏಳನೇ ಅಧ್ಯಾಯದಲ್ಲೇ ಚರ್ಚಿಸಿದ್ದೇವೆ).

ಹೀಗೆ ನಿರಂತರ ಸೃಷ್ಟಿ-ಸಂಹಾರ ಮಾಡುವ ಭಗವಂತನಿಗೆ ಕರ್ಮ ಅಂಟುವುದಿಲ್ಲವೇ? ಮುಂದಿನ ಶ್ಲೋಕಗಳಲ್ಲಿ ನೋಡೋಣ:

ನಚ ಮಾಂ ತಾನಿ ಕರ್ಮಾಣಿ ನಿಬಧ್ನನ್ತಿ ಧನಂಜಯ ।
ಉದಾಸೀನವದಾಸೀನಮಸಕ್ತಂ ತೇಷು ಕರ್ಮಸು ॥೯॥

ನ ಚ ಮಾಮ್ ತಾನಿ ಕರ್ಮಾಣಿ ನಿಬಧ್ನನ್ತಿ ಧನಂಜಯ ।
ಉದಾಸೀನವತ್ ಆಸೀನಮ್ ಅಸಕ್ತಮ್ ತೇಷು ಕರ್ಮಸು –ಧನಂಜಯಾ, ನಾನು ಮಾಡಿಯೂ ಮಾಡದವನಂತೆ ಇದ್ದುಬಿಡುತ್ತೇನೆ. ಆ ಕರ್ಮಗಳಲ್ಲಿ ನನಗೆ ನಂಟಿಲ್ಲ. ಆದ್ದರಿಂದ ಆ ಕರ್ಮಗಳು ನನ್ನನ್ನು ಕಟ್ಟಿ ಹಾಕಲಾರವು.

ಭಗವಂತ ನಿರ್ಲಿಪ್ತ, ಆತ ಕರ್ಮ ಮಾಡುವುದು ಆತನಿಗೋಸ್ಕರ ಅಲ್ಲ. ಸ್ವತಂತ್ರನಾದ ಭಗವಂತನನ್ನು ಎಂದೂ ಯಾವ ಕರ್ಮವೂ ಕಟ್ಟಿ ಹಾಕಲಾರವು.(ಒಂದು ವೇಳೆ ಹಾಗೆ ಕಟ್ಟಿ ಹಾಕುವುದಾದರೆ ಭಗವಂತ ಸ್ವತಂತ್ರ ಎನಿಸುವುದಿಲ್ಲ!). "ನಾನು ನನಗೋಸ್ಕರ ಏನನ್ನೂ ಮಾಡುವುದಿಲ್ಲ ಮತ್ತು ಕರ್ಮ ನನಗೆ ಅಂಟುವುದಿಲ್ಲ" ಎಂದು ಸ್ಪಷ್ಟವಾಗಿ ಹೇಳುತ್ತಾನೆ ಕೃಷ್ಣ.

ಈ ಶ್ಲೋಕದಲ್ಲಿ ಧನಂಜಯ ಎನ್ನುವ ವಿಶೇಷಣ ಬಳಕೆಯಾಗಿದೆ. ವ್ಯವಹಾರಿಕವಾಗಿ ಈ ನಾಮವನ್ನು ನೋಡಿದರೆ 'ಜನರಿಂದ ಹಣವನ್ನು ದೋಚಿ ದುಷ್ಟ ರಾಜ್ಯಭಾರ ಮಾಡುವ ಶತ್ರು ರಾಜರನ್ನು ಸೋಲಿಸಿ, ಆ ಸಂಪತ್ತನ್ನು ಜಯಿಸಿ, ಅದನ್ನು ಪ್ರಜೆಗಳಿಗಾಗಿ ಸದುಪಯೋಗ ಮಾಡುವವ ಧನಂಜಯ'. [ತನ್ನ ಸ್ವಾರ್ಥಕ್ಕಾಗಿ ಇನ್ನೊಬ್ಬರ ಮೇಲೆ ದಾಳಿಮಾಡಿ ಹಣ ಗಳಿಸುವವ 'ದರೋಡೆಕೋರ' ಎನಿಸುತ್ತಾನೆ ಹೊರತು ಧನಂಜಯ ಎನಿಸುವುದಿಲ್ಲ. ಮಹಾಭಾರತದಲ್ಲಿ ಏಕಲವ್ಯ ಈ ಎರಡನೇ ಗುಂಪಿಗೆ ಸೇರಿದವನಾಗಿದ್ದ. ಆದ್ದರಿಂದ ಆತನ ಬೆರಳನ್ನು ಕತ್ತರಿಸಲಾಯಿತು ಮತ್ತು ಕೃಷ್ಣ ಸ್ವತಃ ಆತನನ್ನು ಸಂಹಾರ ಮಾಡಿದ್ದ.] ಆಧ್ಯಾತ್ಮಿಕವಾಗಿ ನಿಜವಾದ ಧನ ಎಂದರೆ ಭಗವಂತ. ಅಂತಹ ಭಗವಂತನ ಜ್ಞಾನವನ್ನು ಪಡೆದವ ಧನಂಜಯ. ನಾವೆಲ್ಲರೂ ಅರ್ಜುನನಂತೆ ಭಗವಂತನ ಜ್ಞಾನವನ್ನು ಪಡೆದು ಧನಂಜಯರಾದಾಗ ಮಾತ್ರ ಮೋಕ್ಷವನ್ನು ಪಡೆಯಲು ಸಾಧ್ಯ.

ಮಯಾಽಧ್ಯಕ್ಷೇಣ ಪ್ರಕೃತಿಃ ಸೂಯತೇ ಸಚರಾಚರಮ್।
ಹೇತುನಾಽನೇನ ಕೌಂತೇಯ ಜಗದ್ ವಿಪರಿವರ್ತತೇ ॥೧೦॥

ಮಯಾ ಅಧ್ಯಕ್ಷೇಣ ಪ್ರಕೃತಿಃ ಸೂಯತೇ ಸ ಚರ ಅಚರಮ್।

ಹೇತುನಾ ಅನೇನ ಕೌಂತೇಯ ಜಗತ್ ವಿಪರಿವರ್ತತೇ-ಸಾಕ್ಷಿಯಾಗಿ ನಿಂತ ನನ್ನಿಂದಲೇ ಜೀವ-ಜಡಗಳನ್ನು ಬೆಸೆದು ಪ್ರಕೃತಿ ಹಡೆಯುತ್ತದೆ. ಕೌಂತೇಯಾ, ಈ ಕಾರಣದಿಂದಲೇ ಜಗತ್ತು ಬದಲಾಗುತ್ತಾ ಸುತ್ತುತ್ತಿದೆ.

ಜಗತ್ತನ್ನು ಸೃಷ್ಟಿ ಮಾಡಲು ಬೇಕಾದ ಮೂಲದ್ರವ್ಯ ಜಡಪ್ರಕೃತಿ ಮತ್ತು ಅದಕ್ಕೆ ಆಕಾರ ಕೊಡುವುದು ಜಡಪ್ರಕೃತಿಯ ಮಾನಿನಿಯಾದ ಚೇತನ ಪ್ರಕೃತಿ ಲಕ್ಷ್ಮಿ. ಭಗವಂತ ಇಡೀ ಸೃಷ್ಟಿಯ ಅಧ್ಯಕ್ಷನಾಗಿ ನಿಂತು, ಕ್ರಿಯೆಯ ಹಿಂದಿನ ಶಕ್ತಿಯಾಗಿ, ಜಡ ಮತ್ತು ಚೇತನಪ್ರಕೃತಿಯ ಮೂಲಕ ಈ ಸೃಷ್ಟಿ ನಿರ್ಮಾಣ ಮಾಡುತ್ತಾನೆ. ಪ್ರಪಂಚದಲ್ಲಿರುವ ಪ್ರತಿಯೊಂದು ವಸ್ತುವಿನಲ್ಲೂ ಕೂಡಾ ಒಂದು ವಿಶಿಷ್ಟ ಶಕ್ತಿಯಾಗಿ ಭಗವಂತ ತುಂಬಿದ್ದಾನೆ.

ಅವಜಾನಂತಿ ಮಾಂ ಮೂಢಾ ಮಾನುಷೀಂ ತನುಮಾಶ್ರಿತಮ್ ।
ಪರಂ ಭಾವಮಜಾನಂತೋ ಮಮ ಭೂತಮಹೇಶ್ವರಮ್ ॥೧೧॥

ಅವಜಾನಂತಿ ಮಾಮ್ ಮೂಢಾಃ ಮಾನುಷೀಂ ತನುಮ್ ಆಶ್ರಿತಮ್ ।
ಪರಮ್ ಭಾವಮ್ ಅಜಾನಂತಃ ಮಮ ಭೂತಮಹೇಶ್ವರಮ್-ಮನುಷ್ಯರಂತೆ ಕಾಣಿಸಿಕೊಂಡು ಮೈದಾಳಿದ ನನ್ನನ್ನು ಮನುಷ್ಯನೆಂದೇ ಬಗೆದು ಕಡೆಗಾಣಿಸುತ್ತಾರೆ-ಎಂದೆಂದೂ ಎಲ್ಲೆಡೆಯೂ ಇರುವ ಹಿರಿದಕ್ಕೂ ಹಿರಿದಾದ ನನ್ನ ಹಿರಿಮೆಯನ್ನರಿಯದ ತಿಳಿಗೇಡಿಗಳು.

ಈ ಶ್ಲೋಕದಲ್ಲಿ ಭಗವಂತ ತನ್ನ ಸ್ವರೂಪದ ಬಗ್ಗೆ ಇನ್ನ್ಯಾರೂ ಹೇಳಲಾಗದ ಒಂದು ಸಂಗತಿಯನ್ನು ಹೇಳುತ್ತಾನೆ. ಭಗವಂತನಿಗೆ ಪಾಂಚಭೌತಿಕ ಶರೀರವಿಲ್ಲ. ಅವತಾರ ರೂಪಿ ಭಗವಂತ ನಮಗೆ ನಮ್ಮಂತೇ ಶರೀರ ಉಳ್ಳವನಂತೆ ಕಾಣಿಸಿಕೊಳ್ಳುತ್ತಾನೆ ಅಷ್ಟೇ. ಅಲ್ಲಿ ಕಾಣುವ ಶರೀರವನ್ನು ಕಂಡು: ಭಗವಂತನ ಶರೀರ ನಮ್ಮಂತೆ ನಶ್ವರವಾದ, ಒಂದು ದಿನ ಬಿದ್ದು ಹೋಗುವ ಶರೀರ ಎಂದು ತಿಳಿಯುವವರು- ಸ್ವಭಾವತಃ ತಾಮಸರು ಅಥವಾ ತಾಮಸದ ಪ್ರಭಾವಕ್ಕೆ ಒಳಗಾದ ಭಗವಂತನ ಹಿರಿಮೆಯನ್ನರಿಯದ ತಿಳಿಗೇಡಿಗಳು ಎನ್ನುತ್ತಾನೆ ಕೃಷ್ಣ.
ಇಲ್ಲಿ ಭೂತಮಹೇಶ್ವರ ಎನ್ನುವ ವಿಶೇಷಣ ಬಳಕೆಯಾಗಿದೆ. ಇದು ಭಗವಂತನ ಹಿರಿಮೆಯನ್ನು ಹೇಳುವ ವಿಶೇಷ ಪದ. ಸಮಷ್ಟಿಯಾಗಿ ಈ ಪದವನ್ನು ನೋಡಿದರೆ: ಭೂತಗಳು ಎಂದರೆ ಸಮಸ್ತ ಜೀವಗಳು. ಅವರಿಗೆ ಈಶರು ಬ್ರಹ್ಮಾದಿ ದೇವತೆಗಳು(ಭೂತೇಶರು). ಈ ದೇವತೆಗಳಿಗೆ ಮಹತ್ತಾದವಳು ಶ್ರೀಲಕ್ಷ್ಮಿ(ಭೂತಮಹೇಶಳು). ಇಂತಹ ಲಕ್ಷ್ಮಿಗೆ ವರನಾಗಿರುವ ಭಗವಂತ "ಭೂತಮಹೇಶ್ವರ". ಇದೇ ಪದವನ್ನು ಬಿಡಿಸಿ ನೋಡಿದರೆ ಭೂತಮಹಾನ್+ಈಶ್ವರ : ಅಂದರೆ ಬ್ರಹ್ಮಾದಿ ಸಮಸ್ತ ಭೂತಗಳಿಗೂ ಮಹಾನ್ ಆಗಿ ಎಲ್ಲರನ್ನೂ ನಿಯಂತ್ರಿಸುವ , ಸರ್ವೋನ್ನತನಾದ- ಸರ್ವಸಮರ್ಥ ಭಗವಂತ. ಇನ್ನೊಂದು ರೀತಿಯಲ್ಲಿ ಭೂತ+ಮಹತ್+ಈಶ್ವರ. ಇಲ್ಲಿ ಭೂತ ಎಂದರೆ: ಉನ್ನತಿಯ ತುತ್ತ ತುದಿಯಲ್ಲಿರುವ, ಹುಟ್ಟು ಸಾವಿಲ್ಲದ ಅನಾಧಿನಿತ್ಯ. ಮಹತ್ ಎಂದರೆ: ಕಾಲತಃ , ದೇಶತಃ, ಗುಣತಃ ಪರಿಪೂರ್ಣವಾಗಿರುವ ತತ್ತ್ವ. ಈಶ್ವರ ಎಂದರೆ : ಸರ್ವ ಸಮರ್ಥ ಭಗವಂತ. ಹೀಗೆ ಈ ವಿಶೇಷಣ ಅನೇಕ ರೂಪದಲ್ಲಿ ಭಗವಂತನ ಗುಣವನ್ನು ಸಾರುತ್ತದೆ.

ಮೋಘಾಶಾ ಮೋಘಕರ್ಮಾಣೋ ಮೋಘಜ್ಞಾನಾ ವಿಚೇತಸಃ ।
ರಾಕ್ಷಸೀಮಾಸುರೀಂ ಚೈವ ಪ್ರಕೃತಿಂ ಮೋಹಿನೀಂ ಶ್ರಿತಾಃ ॥೧೨॥

ಮೋಘ ಆಶಾಃ ಮೋಘಕರ್ಮಾಣಃ ಮೋಘಜ್ಞಾನಾಃ ವಿಚೇತಸಃ ।
ರಾಕ್ಷಸೀಮ್ ಆಸುರೀಮ್ ಚ ಏವ ಪ್ರಕೃತಿಮ್ ಮೋಹಿನೀಮ್ ಶ್ರಿತಾಃ -ಇವರ ಆಸೆ ಈಡೇರದು. ಕರ್ಮಗಳು ಫಲಿಸವು. ತಿಳಿವು ಮಾಯವಾಗುವುದು. ಅವರು ಬಗೆಗೇಡಿಗಳು; ಮರುಳುಗೊಳಿಸುವ, ರಕ್ಕಸರ -ಅಸುರರ ತಾಮಸ ಸ್ವಭಾವಕ್ಕೆ ಒಳಗಾದವರು.

'ಭಗವಂತ ಜ್ಞಾನಾನಂದ ಸ್ವರೂಪ, ಆತನಿಗೆ ಪಾಂಚಭೌತಿಕ ಶರೀರ ಇಲ್ಲ' ಎನ್ನುವ ವಿಚಾರವನ್ನು ಕೃಷ್ಣ ಇಲ್ಲಿ ಒತ್ತು ಕೊಟ್ಟು ಹೇಳುತ್ತಾನೆ. "ದೇವರಿಗೆ ನಮ್ಮಂತೆ ಪಾಂಚಭೌತಿಕ ಶರೀರ ಇದೆ-ಅನ್ನುವ ಚಿಂತನೆಯೇ ಪಾತಕದ ದಾರಿ" ಎನ್ನುತ್ತಾನೆ ಕೃಷ್ಣ. ಏಕೆಂದರೆ ಹಾಗೆ ಚಿಂತನೆ ಮಾಡುವವರು ಸಾತ್ವಿಕರಾಗಿರುವುದಿಲ್ಲ. ಅವರು ಎಂದೂ ಭಗವದ್ ಭಕ್ತರಾಗಿರುವುದಿಲ್ಲ. ಹೀಗೆ ಚಿಂತನೆ ಮಾಡುವವರ ಅಧ್ಯಾತ್ಮ ಸಾಧನೆಯ ಎಲ್ಲಾ ಆಸೆಗಳೂ ಕಮರಿ ಹೋಗುತ್ತವೆ. ಭಗವಂತನನ್ನು ನಶ್ವರ ಎಂದು ಹೇಳುವವರನ್ನು ದೇವತೆಗಳು ಎಂದೂ ಪ್ರೀತಿಸುವುದಿಲ್ಲ. ಅವರು ಮಾಡುವ ಯಜ್ಞ-ಯಾಗಾದಿಗಳು ವ್ಯರ್ಥ. ಒಟ್ಟಿನಲ್ಲಿ ಅಧ್ಯಾತ್ಮ ಸಾಧನೆಯಲ್ಲಿ ಪಾರತ್ರಿಕವಾಗಿ ಅವರ ಯಾವ ಆಸೆಯೂ ನೆರವೇರುವುದಿಲ್ಲ.
ಸಾತ್ವಿಕ ಚಿಂತನೆ ಇಲ್ಲದವರು ಅಥವಾ ತಾಮಸ ಪ್ರಭಾವಕ್ಕೊಳಗಾದವರು ಭಗವಂತನನ್ನು ಈ ರೀತಿ ದೋಷ ಚಿಂತನೆ ಮಾಡುತ್ತಾರೆ. ಅವರಿಗೆ ಚಿಂತನಾ ಶಕ್ತಿ ಇರುವುದಿಲ್ಲ. ಇವರು ಯಾವ ಶಾಸ್ತ್ರ ಓದಿಯೂ ಉಪಯೋಗವಿಲ್ಲ. ಅವರ ಮನಸ್ಸು ಅಧ್ಯಾತ್ಮವನ್ನು ಗ್ರಹಿಸುವುದಿಲ್ಲ. "ಇಂತವರು ರಾಕ್ಷಸರು ಅಥವಾ ಅಸುರರಾಗಿರುತ್ತಾರೆ" ಎನ್ನುತ್ತಾನೆ ಕೃಷ್ಣ. ರಾಕ್ಷಸರು ಎಂದರೆ ಸ್ವಭಾವತಃ ತಾಮಸರು; ಅಸುರರು ಎಂದರೆ ರಾಜಸರು-ಇಂದ್ರಿಯ ಭೋಗದಲ್ಲೇ ಪುರುಷಾರ್ಥ ಕಾಣುವವರು. ಇವರೊಂದಿಗೆ ಪ್ರಭಾವದಿಂದ ಚಿಂತನಾಶೀಲತೆಯನ್ನು ಕಳೆದುಕೊಂಡವರು ಕೂಡಾ ಈ ರೀತಿ ಯೋಚಿಸುತ್ತಾರೆ. ಇವರಿಗೆ ಎಂದೂ ಸಹಜ ಚಿಂತನೆ ಬರುವುದಿಲ್ಲ. ಇವರು ಯಾವಾಗಲೂ ಸತ್ಯಕ್ಕೆ ವಿರುದ್ಧವಾಗಿ ಚಿಂತಿಸುತ್ತಿರುತ್ತಾರೆ.

ಮಹಾತ್ಮಾನಸ್ತು ಮಾಂ ಪಾರ್ಥ ದೈವೀಂ ಪ್ರಕೃತಿಮಾಶ್ರಿತಾಃ ।
ಭಜಂತ್ಯನನ್ಯಮನಸೋ ಜ್ಞಾತ್ವಾ ಭೂತಾದಿಮವ್ಯಯಮ್ ॥೧೩॥

ಮಹಾ ಆತ್ಮಾನಃ ತು ಮಾಮ್ ಪಾರ್ಥ ದೈವೀಮ್ ಪ್ರಕೃತಿಮ್ ಆಶ್ರಿತಾಃ ।
ಭಜಂತಿ ಅನನ್ಯ ಮನಸಃ ಜ್ಞಾತ್ವಾ ಭೂತ ಆದಿಮ್ ಅವ್ಯಯಮ್ -ಓ ಪಾರ್ಥಾ, ಸಾತ್ವಿಕ ಸ್ವಭಾವದ ಹಿರಿಯ ಮಂದಿ, ಅಳಿವ ವಿಶ್ವಕ್ಕೆಲ್ಲಾ ಅಳಿವಿರದ ನಾನೇ ಕಾರಣ ಎಂದು ತಿಳಿದು, ಒಂದೇ ಬಗೆಯಿಂದ ನನ್ನನ್ನು ಪೂಜಿಸುತ್ತಾರೆ.

ಹಿಂದಿನ ಶ್ಲೋಕದಲ್ಲಿ ಆಸುರೀ ಮತ್ತು ರಾಕ್ಷಸ ಸ್ವಭಾವದವರನ್ನು ವಿವರಿಸಿದ ಕೃಷ್ಣ ಇಲ್ಲಿ ದೈವೀ ಸ್ವಭಾವದವರನ್ನು ವಿವರಿಸುತ್ತಾನೆ. ದೈವೀ ಸ್ವಭಾವದವರು ಸದಾ ಜ್ಞಾನದ, ಬೆಳಕಿನ, ಸತ್ಯದ ದಾರಿಯಲ್ಲಿ ಸಾಗುವವರು. ಅವರು ಭಗವಂತನನ್ನು ತಿಳಿಯುವ ಭಾಗ್ಯ ಪಡೆದವರು. ಇವರನ್ನು ಭಗವಂತ "ಮಹಾತ್ಮರು" ಎನ್ನುತ್ತಾನೆ. ಭಗವಂತನಿಗೆ ಇವರ ಮೇಲೆ ಅಪಾರ ಪ್ರೀತಿ. ಕೃಷ್ಣ ಹೇಳುತ್ತಾನೆ "ಅವರು ನನ್ನನ್ನು ಅನನ್ಯ ಮನಸ್ಸಿನಿಂದ ಭಜನೆ ಮಾಡುತ್ತಾರೆ" ಎಂದು. ನಾವು ದೇವರನ್ನು ಪ್ರೀತಿಸುವುದು ಮತ್ತು ದೇವರು ನಮ್ಮನ್ನು ಪ್ರೀತಿಸುವುದು ನಿಜವಾದ ಭಜನೆ. ದೈವೀ ಸ್ವಭಾವದವರು ಭಗವಂತನನ್ನು ಬಿಟ್ಟು ಉಳಿದುದೆಲ್ಲವೂ ನಶ್ವರ, ಶಾಶ್ವತ ಸತ್ಯ ಭಗವಂತ ಮಾತ್ರ ಎನ್ನುವ ಸತ್ಯವನ್ನು ಅರಿತಿರುತ್ತಾರೆ. ಪ್ರಪಂಚದಲ್ಲಿ ಭಗವಂತ ಮತ್ತು ಆತನ ಜ್ಞಾನ ಮಾತ್ರ ಅವ್ಯಯ. ಉಳಿದ (ದುಡ್ಡು, ಆಸ್ತಿ, ಚಿನ್ನ, ಅಧಿಕಾರ, ಇತ್ಯಾದಿ) ಎಲ್ಲವೂ ವ್ಯಯ. ನಶ್ವರವಲ್ಲದ ಸಂಪತ್ತು ಭಗವಂತ ಮತ್ತು ಆತನ ಜ್ಞಾನ. ಈ ರೀತಿ ಭಗವಂತನ ಚಿಂತನೆ ಮಾಡುವವರು ಮಹಾತ್ಮರು.
ಈ ಶ್ಲೋಕದಲ್ಲಿ ಬಂದಿರುವ ವಿಶೇಷಣ 'ಪಾರ್ಥ'. "ಪ್ರಥೆಯ ಮಗನೇ" ಎಂದು ಕೃಷ್ಣ ಅರ್ಜುನನನ್ನು ಸಂಬೋಧಿಸುತ್ತಿದ್ದಾನೆ ಎನ್ನುವುದು ಮೇಲ್ನೋಟದ ಅರ್ಥ. ವ್ಯುತ್ಪತ್ತಿ ಶಾಸ್ತ್ರೀಯ ದೃಷ್ಟಿಯಿಂದ(Etymologically) ನೋಡಿದರೆ ಈ ವಿಶೇಷಣದ ಹಿಂದೆ ಆಧ್ಯಾತ್ಮಿಕವಾಗಿ ಬೇರೆಯೇ ಅರ್ಥವಿದೆ. 'ಪ್ರಥ- ವಿಸ್ತಾರೆ' ಧಾತು. ಯಾವುದು ಹಬ್ಬಿಕೊಂಡಿದೆಯೋ, ಯಾವುದು ಎಲ್ಲಾ ಕಡೆ ತುಂಬಿದೆಯೋ ಅದು 'ಪ್ರಥ'. ಇದು ಭಗವಂತನ ಸರ್ವಗತತತ್ವವನ್ನು ಸೂಚಿಸುತ್ತದೆ. ಭಗವಂತ ಸರ್ವಗತ ಎನ್ನುವ ಸತ್ಯವನ್ನು ಅರಿತು ಅವನನ್ನು ಎಲ್ಲಾ ಕಡೆ ಕಾಣುವವರು 'ಪಾರ್ಥರು'. ಇನ್ನೊಂದು ಅರ್ಥದಲ್ಲಿ ವೇದಾರ್ಥಭೂತನಾದ ಭಗವಂತನನ್ನು, ಅವನ ಗುಣಗಳನ್ನು, ಸದಾ ಪಾನ ಮಾಡುವವರು 'ಪಾರ್ಥರು'. ನಾವೆಲ್ಲರೂ ವೇದಾರ್ಥವನ್ನು ಪಾನ ಮಾಡುತ್ತಾ ಪಾರ್ಥರಾಗಬೇಕು. ಎಲ್ಲೆಡೆ ಹಬ್ಬಿರುವ ಸರ್ವಗತವಾದ ಶಕ್ತಿಯನ್ನು ನಮ್ಮೊಳಗೂ ಕಾಣಬೇಕು ಎನ್ನುವುದು ಈ ಸಂಬೋಧನೆಯ ಹಿಂದಿರುವ ಸಂದೇಶ.

ದೈವೀ ಸ್ವಭಾವದವರು ಭಗವಂತನನ್ನು ಯಾವಯಾವ ಬಗೆಯಲ್ಲಿ ಉಪಾಸನೆ ಮಾಡುತ್ತಾರೆ ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಸತತಂ ಕೀರ್ತಯಂತೋ ಮಾಂ ಯತಂತಶ್ಚ ದೃಢವ್ರತಾಃ ।
ನಮಸ್ಯಂತಶ್ಚ ಮಾಂ ಭಕ್ತ್ಯಾ ನಿತ್ಯಯುಕ್ತಾ ಉಪಾಸತೇ ॥೧೪॥

ಸತತಮ್ ಕೀರ್ತಯಂತಃ ಮಾಮ್ ಯತಂತಃ ಚ ದೃಢ ವ್ರತಾಃ।
ನಮಸ್ಯಂತಃ ಚ ಮಾಮ್ ಭಕ್ತ್ಯಾ ನಿತ್ಯ ಯುಕ್ತಾಃ ಉಪಾಸತೇ -ಅನುದಿನವೂ ನನ್ನಲ್ಲಿ ಬಗೆಯಿಟ್ಟು ನನ್ನನ್ನೇ ಸೇವಿಸುತ್ತಾರೆ. ನಿರಂತರ ನನ್ನನ್ನು ಕೊಂಡಾಡುತ್ತಾ ನೇಮಗಳನ್ನು ನೆಮ್ಮಿಕೊಂಡು ಹೆಣಗುತ್ತಾ ನನಗಾಗಿ ತಲೆಬಾಗುತ್ತಾ.

"ದೈವೀ ಸ್ವಭಾವದವರು ನಿರಂತರ ನನ್ನನ್ನು ಕೀರ್ತನ ಮಾಡುತ್ತಾರೆ" ಎನ್ನುತ್ತಾನೆ ಕೃಷ್ಣ. ಅವರ ಪ್ರತಿಯೊಂದು ಚಟುವಟಿಕೆಯಲ್ಲೂ ಭಗವದ್ ಪ್ರಜ್ಞೆ ಗಾಢವಾಗಿರುತ್ತದೆ. ಇನ್ನೊಂದು ಅರ್ಥದಲ್ಲಿ ತತವಾದ್ಯವನ್ನು ಹಿಡಿದು, ತಂತಿಯನ್ನು ಮೀಟುತ್ತಾ ಭಗವಂತನ ಗುಣಗಾನ ಮಾಡುತ್ತಾ, ಹಾಡುತ್ತಾ(ನಾರದ ಮಹರ್ಷಿಗಳಂತೆ) ಸದಾ ಸಂತೋಷವಾಗಿರುವವರು ದೈವೀ ಸ್ವಭಾವದವರು. ಇವರು ನಿರಂತರ, ತಮ್ಮ ಗುರಿ ತಲುಪುವತನಕವೂ ದೃಡ ಧೀಕ್ಷೆಯಿಂದ, ಅನನ್ಯ ಪ್ರೀತಿಯಿಂದ ಉಪಾಸನೆ ಮಾಡುತ್ತಾರೆ. ಇವರಲ್ಲಿ ಇನ್ನೊಂದು ವಿಧದ ಭಕ್ತರನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಜ್ಞಾನಯಜ್ಞೇನ ಚಾಪ್ಯನ್ಯೇ ಯಜಂತೋ ಮಾಮುಪಾಸತೇ।
ಏಕತ್ವೇನ ಪೃಥಕ್ ತ್ವೇನ ಬಹುಧಾ ವಿಶ್ವತೋಮುಖಮ್ ॥೧೫॥

ಜ್ಞಾನಯಜ್ಞೇನ ಚ ಅಪಿ ಅನ್ಯೇ ಯಜಂತಃ ಮಾಮ್ ಉಪಾಸತೇ ।
ಏಕತ್ವೇನ ಪೃಥಕ್ ತ್ವೇನ ಬಹುಧಾ ವಿಶ್ವತಃ ಮುಖಮ್-ಕೆಲವರು ಅರಿವಿನ ಮಾನಸ ಯಜ್ಞದಿಂದ ಎಲ್ಲೆಡೆ ತುಂಬಿರುವ ನನ್ನನ್ನು ಪೂಜಿಸುತ್ತಾ ಸೇವಿಸುತ್ತಾರೆ- ಎಲ್ಲೆಡೆಯಿರುವ ಭಗವಂತನೊಬ್ಬನೇ ಎಂದು[ಏಕಮೂರ್ತಿಯೆಂದು], ಎಲ್ಲಕ್ಕಿಂತ ಬೇರೆಯೆಂದು[ಚತುರ್ಮೂರ್ತಿಯೆಂದು], ಬಗೆಬಗೆಯ ಬಣ್ಣದವನೆಂದು [ಅನೇಕಮೂರ್ತಿಯೆಂದು], ಹೀಗೆ ಹಲವಾರು ಬಗೆಯಿಂದ.

ಇನ್ನು ಕೆಲವರು ಭಗವಂತನ ಅರಿವಿನ ಪ್ರಪಂಚದಲ್ಲಿ ಮುಳುಗಿಬಿಟ್ಟಿರುತ್ತಾರೆ. ಧ್ಯಾನದಲ್ಲಿ ಅವರಿಗೆ ಹೊರಗಿನ ಪ್ರಪಂಚದ ಅರಿವೇ ಇರುವುದಿಲ್ಲ. ಧ್ಯಾನದಲ್ಲಿ ಭಗವಂತನನ್ನು ಅನೇಕ ಆಯಾಮದಲ್ಲಿ ಕಾಣುವುದೇ ಅವರ ಉಪಾಸನೆ. ಇವರ ಉಪಾಸನೆ ಧ್ಯಾನ ಪೂರ್ವಕವಾದ ಯಜ್ಞ. ಬಾಹ್ಯವಾಗಿ ಇವರನ್ನು ಮಹಾತ್ಮರು ಎಂದು ಗುರುತಿಸುವುದು ಬಹಳ ಕಷ್ಟ. ಕೃಷ್ಣ ಹೇಳುತ್ತಾನೆ: "ಇಂತವರು ನನ್ನನ್ನು ಒಂದಾಗಿ, ಬೇರೆಯಾಗಿ, ಬಹುವಾಗಿ ಕಾಣುತ್ತಾರೆ" ಎಂದು. ಇಲ್ಲಿ ಏಕತ್ವೇನ ಅಂದರೆ ಭಗವಂತ ಒಬ್ಬನೆ ಎಂದು ಉಪಾಸನೆ ಮಾಡುವುದು. ಒಂದೊಂದು ದೇಶಕ್ಕೆ, ಒಂದೊಂದು ಜಾತಿಗೆ, ಒಂದೊಂದು ಮತಕ್ಕೆ ಒಬ್ಬ ದೇವರಲ್ಲ. ಎಲ್ಲರಿಗೂ ದೇವರು ಒಬ್ಬನೇ ಎಂದು ಉಪಾಸನೆ ಮಾಡುವುದು ಏಕತ್ವೇನ. ಪೃಥಕ್ತ್ವೇನ ಎಂದರೆ ಎಲ್ಲರಿಂದ ವಿಲಕ್ಷಣನಾದ ಭಗವಂತನನ್ನು ಅನೇಕ ಬಗೆಯಿಂದ ಕಾಣುವುದು. ಇವರು ಭಗವಂತನನ್ನು ಧ್ಯಾನದಲ್ಲಿ ಅನೇಕ ವರ್ಣದಿಂದ ಕಾಣುತ್ತಾರೆ. ಹೀಗೆ ವಿಶ್ವತೋಮುಖ ಭಗವಂತನನ್ನು ಏಕ ಎಂತಲೂ, ಚತುರ್ಮೂರ್ತಿ ಎಂತಲೂ, ಅನೇಕ ಮೂರ್ತಿ ಎಂತಲೂ, ಅನೇಕ ವರ್ಣದಿಂದ ಉಪಾಸನೆ ಮಾಡುತ್ತಾರೆ.

ಭಗವಂತನನ್ನು ಹೇಗೆ ಅನುಸಂಧಾನ ಮಾಡಬೇಕು, ಹೇಗೆ ಮಾಡಬಾರದು ಎನ್ನುವ ಅರಿವನ್ನು ಕೊಟ್ಟ ಕೃಷ್ಣ, ಮುಂದೆ ಭಗವಂತನ ವಿಭೂತಿಯನ್ನು ಬೇರೆ ಬೇರೆ ಪ್ರತೀಕಗಳಲ್ಲಿ ಹೇಗೆ ಅನುಸಂಧಾನ ಮಾಡಬೇಕು ಎನ್ನುವುದನ್ನು ವಿವರಿಸುತ್ತಾನೆ. ಇಡೀ ವಿಶ್ವದ ಅಣು ಕಣಗಳಲ್ಲಿ ತುಂಬಿರುವ ಭಗವಂತನ ಅನುಸಂಧಾನ ಹಾಗೂ ಅದರ ವಿಶಿಷ್ಟ ಉಪಾಸನೆಯ ವಿವರವನ್ನು ಈ ಅಧ್ಯಾಯದ ಮುಂದಿನ ಭಾಗದಲ್ಲಿ ಕೃಷ್ಣ ವಿವರಿಸಿದ್ದಾನೆ. ಬನ್ನಿ ಈ ಅಪೂರ್ವ ವಿಶಿಷ್ಟ ಜ್ಞಾನವನ್ನು ಭಗವಂತನಿಂದಲೇ ಕೇಳಿ ತಿಳಿದು ಕೃತಾರ್ಥರಾಗೋಣ.

ಅಹಂ ಕ್ರತುರಹಂ ಯಜ್ಞಃ ಸ್ವಧಾಽಹಮಹಮೌಷಧಮ್ ।
ಮಂತ್ರೋಽಹಮಹಮೇವಾಽಜ್ಯಮಹಮಗ್ನಿರಹಂ ಹುತಮ್ ॥೧೬॥

ಅಹಮ್ ಕ್ರತುಃ ಅಹಮ್ ಯಜ್ಞಃ ಸ್ವಧಾ ಅಹಮ್ ಅಹಮ್ ಔಷಧಮ್ ।
ಮಂತ್ರಃ ಅಹಮ್ ಅಹಮ್ ಏವ ಆಜ್ಯಮ್ ಅಹಮ್ ಅಗ್ನಿಃ ಅಹಮ್ ಹುತಮ್- ನನ್ನಿಂದ ಯಾಗ. [ನನ್ನ ಕ್ರಿಯೆ ನನ್ನ ಸ್ವರೂಪವಾದ್ದರಿಂದ ನಾನು 'ಕ್ರತು']. ನನ್ನಿಂದ ಹವನ ಕ್ರಿಯೆ.[ಎಲ್ಲಾ ಬಲ್ಲವನಾದ್ದರಿಂದ 'ಯಜ್ಞ']. ಪಿತೃಗಳ ಅನ್ನ ನನ್ನಿಂದ [ನನಗೆ ನಾನೇ ಆಸರೆಯಾದ್ದರಿಂದ 'ಸ್ವಧಾ']. ನನ್ನಿಂದ ಮನುಷ್ಯರ ಆಹಾರ[ಬೆಂದವರಿಗೆ ಆಸರೆಯಾದ್ದರಿಂದ 'ಔಷಧ']. ಮಂತ್ರ ನನ್ನಿಂದ[ತಿಳಿವಿತ್ತು ಸಲಹುದರಿಂದ 'ಮಂತ್ರ']. ನನ್ನಿಂದಲೇ ತುಪ್ಪ [ಎಲ್ಲಕ್ಕಿಂತ ಹಿರಿಯನಾದ್ದರಿಂದ 'ಆಜ್ಯ']. ನನ್ನಿಂದ ಬೆಂಕಿ.[ನಾನೇ ಚಲಿಸದ ವಿಶ್ವಕ್ಕೆ ಚಲನೆ ನೀಡುವುದರಿಂದ 'ಅಗ್ನಿ']. ನನ್ನಿಂದ ಹೋಮದ ಹವಿ[ಭಕ್ತರು ಕರೆವುದರಿಂದ ನಾನೇ 'ಹುತ'].

ಭಗವಂತನ ಉಪಾಸನೆಗೆ ಮೂರು ಪ್ರತೀಕವನ್ನು ಶಾಸ್ತ್ರಕಾರರು ಹೇಳಿದ್ದಾರೆ. ವೇದದಲ್ಲಿ ಆ ಮೂರು ಪ್ರತೀಕಗಳಿಂದ ಉಪಾಸನೆಯೇ ನಮಗೆ ಎಲ್ಲಾ ಕಡೆ ಸಿಗುವುದು. ಅವುಗಳೆಂದರೆ ಅಗ್ನಿಪ್ರತೀಕ, ವಾಯುಪ್ರತೀಕ ಮತ್ತು ಆದಿತ್ಯಪ್ರತೀಕ. ಭೂಸ್ತರದಲ್ಲಿ ಭಗವಂತನ ಉಪಾಸನೆ ಅಗ್ನಿಪ್ರತೀಕದಲ್ಲಿ. ಅಂತರಿಕ್ಷ ಸ್ತರದಲ್ಲಿ ಆದಿತ್ಯ ಮುಖದಲ್ಲಿ ಮತ್ತು ಅಂತರಂಗದಲ್ಲಿ ಭಗವಂತನ ಉಪಾಸನೆ ವಾಯುವಿನ ಪ್ರತೀಕದಲ್ಲಿ. ಭೂಮಿಯಲ್ಲಿ ಸಾಮಾನ್ಯವಾಗಿ ಮನುಷ್ಯರು ಜ್ಞಾನಮಾರ್ಗಕ್ಕಿಂತ ಹೆಚ್ಚು ಕರ್ಮ ಮಾರ್ಗಕ್ಕೆ ಅಂಟಿಕೊಂಡವರು. ಇಂಥವರಲ್ಲಿ ಜ್ಞಾನಕ್ಕಿಂತ ಕರ್ಮಕ್ಕೆ ಒತ್ತು ಹೆಚ್ಚು. ಕೆಲವರು ಬೆಳಿಗ್ಗೆಯಿಂದ ಸಂಜೆ ತನಕ ಪೂಜೆ ಮಾಡುತ್ತಾರೆ. ಆದರೆ ತಾವು ಮಾಡುವ ಅನುಷ್ಠಾನದ ಜ್ಞಾನವೇ ಅವರಿಗಿರುವುದಿಲ್ಲ. ಇವರಿಗೆ ಜ್ಞಾನ ಸಂಪಾದನೆ ದ್ವಿತೀಯಕ(**Secondary**). ಇದು ಮನುಷ್ಯನ ದೌರ್ಬಲ್ಯ. ನಮಗೆ ನಮ್ಮ ಮಡಿವಂತಿಕೆಯಲ್ಲಿರುವಷ್ಟು ಒತ್ತು ಜ್ಞಾನದಲ್ಲಿರುವುದಿಲ್ಲ! ತಿಳಿಯದ ಬಾಹ್ಯಾನುಷ್ಠಾನದಲ್ಲಿ ಕಾಲಹರಣ ಮಾಡುವುದಕ್ಕಿಂತ ಪಾಠ ಪ್ರವಚನದಿಂದ ಸ್ವಲ್ಪಮಟ್ಟಿನ ಜ್ಞಾನ ಗಳಿಸಿಕೊಳ್ಳುವುದು ದೇವರು ಮೆಚ್ಚುವ ಮಹಾ ಪೂಜೆ ಎನಿಸುತ್ತದೆ.
ಕರ್ಮ ಪ್ರಧಾನವಾಗಿರುವವರಿಗೆ ಭಗವಂತನ ಅನುಷ್ಠಾನ ಹೇಗಿರಬೇಕು ಎನ್ನುವುದನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ಕೃಷ್ಣ ಹೇಳುತ್ತಾನೆ: "ಅಹಮ್ ಕ್ರತುಃ ಅಹಮ್ ಯಜ್ಞಃ" ಎಂದು. ಭಗವಂತನ ಆರಾಧನೆಗೋಸ್ಕರ ಮಾಡತಕ್ಕಂತಹ ಅಗ್ನಿ ಆರಾಧನೆಯ ಪ್ರಕ್ರಿಯೆ 'ಕ್ರತು'. ಇಲ್ಲಿ ಯಜ್ಞದ ಮೂಲಕ ಭಗವಂತನಿಗೆ ಆಹುತಿ ಕೊಡುವಾಗ ಈ ರೀತಿ ಹೇಳಿ ಆಹುತಿ ಕೊಡುತ್ತೇವೆ: ಅಗ್ನಯೇ ಸ್ವಾಹಾ-ಅಗ್ನಯ ಇದಂ ನ ಮಮ; ಪ್ರಜಾಪತೆಯೇ ಸ್ವಾಹ ಪ್ರಜಾಪತಯ ಇದಂ ನ ಮಮ; ಇಂದ್ರಾಯ ಸ್ವಾಹಾ-ಇಂದ್ರಾಯ ಇದಂ ನ ಮಮ; ಸೂರ್ಯಾಯ ಸ್ವಾಹಾ-ಸೂರ್ಯಾಯ ಇದಂ ನ ಮಮ; ವಾಯವೇ ಸ್ವಾಹಾ-ವಾಯವ ಇದಂ ನ ಮಮ; ವರುಣಾಯ ಸ್ವಾಹಾ-ವರುಣಾಯ ಇದಂ ನ ಮಮ;..ಇತ್ಯಾದಿ. ಹೀಗೆ ಬೇರೆ ಬೇರೆ ಪ್ರತೀಕದಲ್ಲಿ ಭಗವಂತನಿಗೆ ಆಹುತಿ ಕೊಡುವುದು ಯಜ್ಞ. ಇಲ್ಲಿ ಕೃಷ್ಣ ಹೇಳುತ್ತಾನೆ "ನೀವು ಮಾಡುವ ಕ್ರತುವಿನ ನಿಯಾಮಕ ನಾನು" ಎಂದು. ನಾವು ಯಾವ ಪ್ರತೀಕದಲ್ಲಿ ಪೂಜೆ ಮಾಡಿದರೂ ಅದು ಸಲ್ಲುವುದು ಆ ದೇವತೆಯ ಅಂತರ್ಯಾಮಿ

ಭಗವಂತನಿಗೆ. ಉದಾಹರಣೆಗೆ ಗಣಹೋಮ, ಚಂಡಿಕಾಹೋಮ, ನವಗ್ರಹಹೋಮ ಇತ್ಯಾದಿ. ಇಲ್ಲಿ ನಾವು ಯಾವ ದೇವತೆಯ ಪ್ರತೀಕದಲ್ಲಿ ಯಜ್ಞ ಮಾಡಿದರೂ ಕೂಡಾ ಆ ಯಜ್ಞ ಭಗವಂತನಿಗೆ ಸಲ್ಲುತ್ತದೆ ಎನ್ನುವ ಅನುಸಂಧಾನ ನಮ್ಮಲ್ಲಿರಬೇಕು. ಭಗವಂತ ಅನೇಕ ಶಕ್ತಿ ರೂಪದಲ್ಲಿ ಅಭಿವ್ಯಕ್ತನಾದರೂ ಕೂಡಾ, ಸರ್ವ ನಿಯಾಮಕ ಭಗವಂತ ಒಬ್ಬನೇ. [ನಮಗೆ ಬಂದಿರುವ ಆಪತ್ತಿನ ನಿವಾರಣೆಗಾಗಿ ಜೋತಿಷಿಗಳು ಭಗವಂತನ ಆಯಾ ಶಕ್ತಿ ಪ್ರತೀಕವನ್ನು ಪೂಜಿಸುವಂತೆ ಹೇಳುತ್ತಾರೆಯೇ ಹೊರತು, ಭಗವಂತ ಅನೇಕ ಅಲ್ಲ]. ದೇವತೆಯ ಒಳಗಿರುವ ಭಗವಂತ ಪ್ರೀತನಾದಾಗ ಮಾತ್ರ ಅದು ಆ ದೇವತೆಗೂ ಮತ್ತು ಭಗವಂತನಿಗೂ ಸಂದಂತೆ. ಆದ್ದರಿಂದ ಒಂದೊಂದು ದಿನ ಒಂದೊಂದು ದೇವತೆಗೆ ಪ್ರೀತಿಯಾಗುವುದಕ್ಕೋಸ್ಕರ ಕರ್ಮ ಮಾಡುವುದಲ್ಲ. ಸರ್ವಾಂತರ್ಯಾಮಿ ಭಗವಂತನಿಗೆ ನಮ್ಮ ಪೂಜೆ ಮೀಸಲಾಗಿರಬೇಕು.

ನಮ್ಮ ದೇಹದೊಳಗೆ ತತ್ತ್ವಾಭಿಮಾನಿ ದೇವತೆಗಳಿದ್ದಾರೆ. ದೇವತೆಗಳೆಲ್ಲರೂ ಗುರು ಸ್ಥಾನೀಯರು. ಅವರು ದೇವರ ಪರಿವಾರ. ಅವರನ್ನು ನಿಯಮನ ಮಾಡಿಕೊಂಡು ಆ ಭಗವಂತನಿದ್ದಾನೆ. ಈ ತತ್ತ್ವಾಭಿಮಾನಿ ದೇವತೆಗಳು ಭಗವಂತನ ಅನುಗ್ರಹದಿಂದ ನಮ್ಮನ್ನು ಸನ್ಮಾರ್ಗದಲ್ಲಿ ನಡೆಸಲಿ ಎಂದು ಅವರ ಅಂತರ್ಯಾಮಿಯಾದ ಭಗವಂತನನ್ನು ಆರಾಧಿಸುವುದು ಯಜ್ಞ.

ನಾವು ನಿತ್ಯ ಪೀಠದಲ್ಲಿ ಮಾಡುವ ಪೂಜೆ ತತ್ತ್ವಾಭಿಮಾನಿ ದೇವತೆಗಳನ್ನು ಕುರಿತು ಮಾಡುವ ಯಜ್ಞವಾದರೆ, ಶ್ರಾದ್ಧ- ಪಿತೃದೇವತೆಗಳನ್ನು ಕುರಿತು ಮಾಡುವ ಯಜ್ಞ. ನಮ್ಮಲ್ಲಿ ಅನೇಕರಿಗೆ ಒಂದು ತಪ್ಪು ಕಲ್ಪನೆ ಇದೆ. ಶ್ರಾದ್ಧ 'ದೇಹ ತ್ಯಾಗ ಮಾಡಿದ ಜೀವಕ್ಕೆ' ಎಂದು. ಆದರೆ ಇದು ಸರಿಯಲ್ಲ. ಶ್ರಾದ್ಧ ಸ್ಥೂಲ ದೇಹವನ್ನು ತ್ಯಜಿಸಿ ಸೂಕ್ಷ್ಮ ಶರೀರದಲ್ಲಿರುವ ಜೀವವನ್ನು ನಿಯಂತ್ರಿಸುವ 'ಪಿತೃದೇವತೆಗಳಿಗೆ' ಮಾಡುವಂತ್ತದ್ದು. ವಿಶೇಷವಾಗಿ ಹತ್ತು ಮಂದಿ ವಿಶ್ವೇದೇವತೆಗಳು(ಕ್ರತು,ದಕ್ಷ, ವಾಸು, ಸತ್ಯ, ಕಾಮ, ಕಾಲ,ಧುರಿ, ಲೋಚನ,ಪುರೂರವ ಆರ್ದ್ರವ); ಇವರಲ್ಲಿ ಪುರೂರವ ಮತ್ತು ಆರ್ದ್ರವರದ್ದು ಪಿತೃಗಣದ ನಿಯಮನ ಮಾಡತಕ್ಕಂತಹ ಖಾತೆ(**Portfolio**). ಪಿತೃದೇವತೆಗಳ ಗಣ ಹತ್ತು(ನೂರು ಮಂದಿ ಪಿತೃಗಳಲ್ಲಿ ಇವರು ಪ್ರಧಾನರು): ಯಮ, ಸೋಮ, ಕವ್ಯವಾಹ(ಇವರು ಮೂವರು ಪಿತೃಪತಿಗಳು), ಸೋಮಸದರು, ಅಗ್ನಿಷ್ವಾತ್ತರು, ಬಹಿರ್ಷದರು, ಸೋಮಪರು, ಹವಿರ್ಭುಜರು, ಅಜ್ಯಪರು, ಸುಕಾಲಿಗಳು. ನಾವು ಪಿಂಡ ಹಾಕುವುದು ಜೀವದ ಹಸಿವು ನೀಗಲಿಕ್ಕೆ ಅಲ್ಲ. ನಮ್ಮ ಹಿರಿಯರು ಸ್ವರ್ಗಕ್ಕೆ ಅಥವಾ ನರಕಕ್ಕೆ ಹೋಗುವುದು ಅವರು ಮಾಡಿದ ಕರ್ಮಫಲದಿಂದಲೇ ಹೊರತು ನಾವು ಹಾಕಿದ ಶ್ರಾದ್ಧದಿಂದಲ್ಲ. ಶ್ರಾದ್ಧ ಮಾಡುವ ಉದ್ದೇಶ ಏನೆಂದರೆ ಪಿತೃದೇವತೆಗಳ ಸ್ವಾದೀನದಲ್ಲಿರುವ ಜೀವ ಯಾವುದೋ ದುರಿತದ ಪ್ರಭಾವದಿಂದ ದಾರಿಯಲ್ಲಿ ತಡೆಯನ್ನು **(Road blockers)** ಎದುರಿಸಬೇಕಾಗಬಹುದು. ಆ ಸಮಯದಲ್ಲಿ ಅದನ್ನು ನಿವಾರಣೆ ಮಾಡುವ ಕರ್ಮಾನುಷ್ಠಾನ ಆ ಸೂಕ್ಷ್ಮ ಶರೀರದಲ್ಲಿ ಇರುವುದಿಲ್ಲ. ಅದಕ್ಕೋಸ್ಕರ ಅಂತಹ ಪ್ರತಿಬಂಧಕಗಳಿಂದ ಅವರನ್ನು ಪಾರು ಮಾಡಿ ಮುಂದೆ ಸಾಗಲು ನೆರವು ಕೋರಿ ಮಾಡುವ ಪಿತೃದೇವತೆಗಳ ಪೂಜೆಯೇ ಶ್ರಾದ್ಧ. ಒಟ್ಟಾರೆ ಇದು ಹಿರಿಯರು ಸತ್ತ ದಿನದ ನೆನಪು, ಅವರಿಗೆ ಕೃತಜ್ಞತೆ ಮತ್ತು ಪಿತೃದೇವತೆಗಳ ಪೂಜೆ.

ಕೃಷ್ಣ ಹೇಳುತ್ತಾನೆ: "ಸ್ವಧಾ ಅಹಮ್" ಎಂದು. ಮಂತ್ರಗಳು ವಿಳಾಸದಂತೆ, 'ಸ್ವಾಹ' ತತ್ತ್ವಾಭಿಮಾನಿ ದೇವತೆಗಳಿಗಾದರೆ 'ಸ್ವಧಾ' ಪಿತೃದೇವತೆಗಳಿಗೆ. ನನ್ನ ಮುಖೇನವೇ ಶ್ರಾದ್ಧ ಪಿತೃದೇವತೆಗಳಿಗೆ ಸಲ್ಲುವುದು ಎನ್ನುತ್ತಾನೆ ಕೃಷ್ಣ.

ತತ್ತ್ವಾಭಿಮಾನಿದೇವತೆಗಳು ಮತ್ತು ಪಿತೃದೇವತೆಗಳ ನಂತರ ಮನುಷ್ಯರು. ಮನುಷ್ಯರ ಮುಖ್ಯವಾದ ಆಹಾರ 'ಓಷಧಿ'. ಫಲ ಕೊಟ್ಟು ಸಾಯುವ ಗಿಡವನ್ನು ಸಂಸ್ಕೃತದಲ್ಲಿ 'ಓಷಧಿ' ಎನ್ನುತ್ತಾರೆ. ಆ ಗಿಡದ ಪ್ರಸವವೇ ಅದರ ಸಾವು. ಮನುಷ್ಯ ತಿನ್ನುವ ದವಸಧಾನ್ಯ ಎಲ್ಲವೂ ಓಷಧಿಗಳು. ಇಂತಹ ಓಷಧಿಗಳ ಸಮುದಾಯವೇ ಔಷಧಿ. ಕೃಷ್ಣ ಹೇಳುತ್ತಾನೆ "ಅಹಮ್ ಔಷಧಮ್" ಎಂದು. ನಾವು ತಿನ್ನುವ ದವಸ ಧಾನ್ಯ ಸಲ್ಲುವುದು ಕೂಡಾ ವೈಶ್ವಾನರನಾಗಿ ಒಳಗೆ ಕುಳಿತಿರುವ ಭಗವಂತನಿಗೆ. ಔಷಧ ಕೊಡತಕ್ಕವ, ಅದರಿಂದ ರೋಗ ನಿವಾರಿಸುವವ, ಹಸಿವು ನಿವಾರಿಸಿ ರಕ್ಷಣೆ ಮಾಡುವವ ಭಗವಂತ.

ನಾವು ಬೇರೆಬೇರೆ ಮಂತ್ರಗಳಿಂದ ಆಹುತಿಯನ್ನು ಕೊಡುತ್ತೇವೆ. ಈ ಹಿಂದೆ ಹೇಳಿದಂತೆ ಮಂತ್ರ ವಿಳಾಸವಿದ್ದಂತೆ. ಕೊಡುವ ಆಹುತಿ ಎಲ್ಲವೂ ಭಗವಂತನಿಗೆ ಸೇರುವುದಾದರೆ ಬೇರೆಬೇರೆ ವಿಳಾಸವೇಕೆ? ಕೃಷ್ಣ ಹೇಳಿದ: "ಬೇರೆ ಬೇರೆ ವಿಳಾಸದಲ್ಲಿರುವ ನನಗೆ" ಎಂದು! ಭಗವಂತ ಏಕ ಆದರೆ ಆತನ ರೂಪ ಅನೇಕ. ನಾವು ಯಾವ ಮಂತ್ರದಿಂದ ಕಳುಹಿಸಿದರೂ ಕೂಡಾ-ಅದು ಸೇರುವುದು ಎಲ್ಲಾ ಮಂತ್ರದಿಂದ ವಾಚ್ಯನಾದ, ಸರ್ವಶಬ್ದವಾಚ್ಯ ಭಗವಂತನನ್ನು. ಹೀಗೆ ಬೇರೆಬೇರೆ ಶಕ್ತಿ ರೂಪವನ್ನು ಬೇರೆಬೇರೆ ದೇವತಾ ಪ್ರತೀಕದಲ್ಲಿ ಪೂಜಿಸಿದರೂ ಕೂಡಾ ಪ್ರತಿಯೊಂದು ನಾಮವೂ ಸಹ ಅಂತತಃ ಭಗವಂತನನ್ನೇ ಹೇಳುತ್ತದೆ. ಎಲ್ಲವುದರ ಸಾರವೂ ಭಗವಂತ. ಇದಕ್ಕೆ ಉತ್ತಮ ಉದಾಹರಣೆ ತೆಂಗಿನಕಾಯಿ. ಸಿಪ್ಪೆ ಸಹಿತವಾಗಿರುವ ತೆಂಗಿನಕಾಯಿ ಉರಿಯುವ ಬೆಂಕಿಯಂತೆ; ಸಿಪ್ಪೆಯೊಳಗಿನ ಕಾಯಿ ಬೆಂಕಿಯ ಅಂತರ್ಯಾಮಿ ಅಗ್ನಿ ದೇವತೆಯಂತೆ; ಚಿಪ್ಪಿನ ಒಳಗಿನ ಕೊಬ್ಬರಿ ಅಗ್ನಿ ದೇವತೆಯೊಳಗಿನ ಭಗವಂತನಂತೆ. ಇಲ್ಲಿ ನಾವು ಎಲ್ಲವನ್ನೂ ಕರೆಯುವುದು ತೆಂಗಿನಕಾಯಿ ಅಥವಾ ಅಗ್ನಿ ಎಂತಲೆ. ಹೇಗೆ ನಿಜವಾದ ತೆಂಗಿನಕಾಯಿ ಒಳಗಿನ ಸಾರವೋ ಹಾಗೇ ನಿಜವಾದ ಅಗ್ನಿ ಅಂತತಃ ಅಂತರ್ಯಾಮಿ ಭಗವಂತ. ಈ ಶ್ಲೋಕದಲ್ಲಿ ಕೃಷ್ಣ ಇದನ್ನೇ "ಅಹಮ್ ಅಗ್ನಿಃ" ಎಂದಿರುವುದು.

ಕೃಷ್ಣ ನಾವು ಆಹುತಿಯಾಗಿ ಕೊಡುವ ಒಂದು ಪ್ರಮುಖ ವಸ್ತುವನ್ನು ಉದಾಹರಣೆಯಾಗಿ ತೆಗೆದುಕೊಂಡು ಹೇಳುತ್ತಾನೆ "ಅಹಮ್ ಏವ ಆಜ್ಯಮ್" ಎಂದು. ಆಜ್ಯ ಎಂದರೆ ತುಪ್ಪ. ಆಜ್ಯದಲ್ಲಿ ದೇವತೆಗಳನ್ನು ತಣಿಸುವ ವಿಶಿಷ್ಟ ಶಕ್ತಿ ಇದೆ. ಆಜ್ಯದಲ್ಲಿ ವಿಶಿಷ್ಟ ಶಕ್ತಿಯಾಗಿ ನಾನಿದ್ದೇನೆ ಎನ್ನುವ ಕೃಷ್ಣ ನಾನೇ ಹೋಮದ ಹವಿ (ಅಹಮ್ ಹುತಮ್) ಎನ್ನುತ್ತಾನೆ.

ಹವಿಸ್ಸು ಎಂದರೆ ಭಗವಂತನಿಗೆ ಅರ್ಪಿಸುವ ಹೋಮ ದ್ರವ್ಯ. ಆ ಹವಿಸ್ಸಿನಲ್ಲಿ ವಿಶೇಷ ಶಕ್ತಿ ಇರುವುದು ಆ ಭಗವಂತನಿಂದ. ನಾವು ಅರ್ಪಿಸುವ ಹವಿಸ್ಸು ಎಂದೂ ವ್ಯರ್ಥವಲ್ಲ. ಅಗ್ನಿಗೆ ಅರ್ಪಿಸಿದ ಹವಿಸ್ಸು ಅಗ್ನಿಯಿಂದ ಹೊರ ಹೊಮ್ಮುವ ಏಳು ಬಣ್ಣಗಳ ಮುಖೇನ ವಾತಾವರಣದಲ್ಲಿನ ಸೂರ್ಯ ಕಿರಣದೊಂದಿಗೆ ಸೇರಿ ಸಮಾಜಕ್ಕೆ ಫಲವನ್ನು ಕೊಡುತ್ತದೆ. ಹವಿರ್ಭಾಗವನ್ನು ಸ್ವೀಕರಿಸುವ ಭಗವಂತ ಹವಿರ್ಹರಿಃ . "ಸರ್ವ ದೇವ ನಮಸ್ಕಾರಃ ಕೇಶವಂ ಪ್ರತಿಗಚ್ಛತಿ". ಭಗವಂತ ಎಲ್ಲಾ ಶಬ್ದಗಳಿಂದ ವಾಚ್ಯನಾದವನು. ಆದ್ದರಿಂದ ಯಾವ ಶಬ್ದವನ್ನು ಹೇಳಿದರೂ ಅದು ಸೇರುವುದು ಅವನನ್ನೇ. ಹೀಗೆ ಹವಿಸ್ಸನ್ನು ಸ್ವೀಕರಿಸಿ ಭಕ್ತರ ಪಾಪವನ್ನು ಪರಿಹರಿಸುವ ಭಗವಂತ ಹವಿರ್ಹರಿಃ .

ಈ ಶ್ಲೋಕವನ್ನು ಇನ್ನೊಂದು ಆಯಾಮದಲ್ಲಿ ನೋಡಿದರೆ, ಇಲ್ಲಿ ಬರುವ ಒಂದೊಂದು ಶಬ್ದದಲ್ಲೂ ಭಗವಂತನ ಗುಣಾನುಸಂಧಾನವನ್ನು ಕಾಣುತ್ತೇವೆ.

ಕ್ರತುಃ : ಭಗವಂತನೇ ಕ್ರತು ಶಬ್ದದ ಮುಖ್ಯಾರ್ಥ. 'ಕ್ರತು' - ಕ್ರಿಯೆ, ಜ್ಞಾನ, ಇತ್ಯಾದಿ ಅರ್ಥವನ್ನು ಕೊಡುತ್ತದೆ. ಕ್ರಿಯಾ ಸ್ವರೂಪ, ಜ್ಞಾನ ಸ್ವರೂಪ ಭಗವಂತ 'ಕ್ರತುಃ'. ನಮ್ಮಲ್ಲಿ ನಂಬಿಕೆ, ಇಚ್ಛಾಶಕ್ತಿ, ಕ್ರಿಯಾಶಕ್ತಿ ಹಾಗೂ ಅನುಕೂಲತೆ ಕೊಟ್ಟು, ನಮ್ಮ ಹಿಂದೆ ನಿಂತು, ಕ್ರಿಯಾ ಕಲಾಪಗಳನ್ನು ನಡೆಸುವ, ಜ್ಞಾನ ಸ್ವರೂಪನೂ, ಕರ್ಮದ ಕಟ್ಟಿನಿಂದ ನಮ್ಮನ್ನು ಪಾರು ಮಾಡುವನೂ ಆದ ಭಗವಂತ 'ಕ್ರತುಃ'. ಯಜ್ಞ: ಯಜ್ಞ ಅಂದರೆ ಎಲ್ಲವನ್ನೂ ತಿಳಿದವನು. ಜ್ಞಾನರೂಪಿಯಾಗಿ ಎಲ್ಲೆಡೆ ಇರುವ ಭಗವಂತ, ಎಲ್ಲಾ ಕ್ರಿಯೆಗಳಿಂದ ಎಲ್ಲರೂ ಆರಾಧಿಸಬೇಕಾದ ಯಜ್ಞದ ಅಂತರ್ಯಾಮಿ. ಸ್ವಧಾಃ: ಎಂದರೆ ತನ್ನನ್ನು ತಾನು ಆದರಿಸಿ ನಿಂತ ಸರ್ವ ನಿಯಾಮಕ. ಔಷಧಃ: ಭಗವಂತ 'ಔಷಧಃ'. ಎಂದರೆ ಸಂಸಾರ ತಾಪದಲ್ಲಿ ಬಿದ್ದು ಒದ್ದಾಡುವವ (ಔಷರು)ರಿಗೆ ಆಸರೆ-ಮೋಕ್ಷಪ್ರದ. ಮಂತ್ರಃ: ಜ್ಞಾನಪೂರ್ವಕವಾಗಿ ಅನುಸಂಧಾನ ಮಾಡುವವರನ್ನು ರಕ್ಷಣೆ ಮಾಡುವ ಭಗವಂತ 'ಮಂತ್ರಃ'. [ಮಂತ್ರ ನಮ್ಮನ್ನು ರಕ್ಷಣೆ ಮಾಡುವುದು ನಾವು ತಿಳಿದು ಪಠಿಸಿದಾಗ ಮಾತ್ರ. ಇಲ್ಲದಿದ್ದರೆ ಕಿಂಚಿತ್ ಫಲ ಮಾತ್ರ ದೊರೆಯಬಹುದೇ ಹೊರತು ನಿಜವಾದ ಮಹಾಫಲವಲ್ಲ]. ಆಜ್ಯಃ: ಭಗವಂತ ಎಲ್ಲಕ್ಕಿಂತ ದೊಡ್ಡ ವಸ್ತು ಆದ್ದರಿಂದ ಆತ "ಆಜ್ಯಃ". ಅಗ್ನಿಃ: ಚಲಿಸದೇ ಇರುವ ವಸ್ತುವಿಗೆ ಚಲನೆ ಕೊಡುವ ಭಗವಂತ "ಅಗ್ನಿಃ". ಹುತಃ: ಎಲ್ಲಾ ಭಕ್ತರಿಂದ ಆಹುತನಾದ್ದರಿಂದ ಭಗವಂತ "ಹುತಃ".

ಪಿತಾಽಹಮಸ್ಯ ಜಗತೋ ಮಾತಾ ಧಾತಾ ಪಿತಾಮಹಃ ।
ವೇದ್ಯಂ ಪವಿತ್ರಮೋಂಕಾರ ಋಕ್ ಸಾಮ ಯಜುರೇವ ಚ ॥೧೭॥

ಪಿತಾ ಅಹಮ್ ಅಸ್ಯ ಜಗತಃ ಮಾತಾ ಧಾತಾ ಪಿತಾಮಹಃ ।
ವೇದ್ಯಮ್ ಪವಿತ್ರಮ್ ಓಂಕಾರಃ ಋಕ್ ಸಾಮ ಯಜುಃ ಏವ ಚ- ನಾನು ಈ ಜಗದ ತಂದೆ, ತಾಯಿ, ಪೋಷಕ ಮತ್ತು ಅಜ್ಜ-ಮುತ್ತಜ್ಜ.[ಸಲಹುವುದರಿಂದ 'ಪಿತೃ'. ಅರಿಯುವುದರಿಂದ 'ಮಾತೃ'. ಬೆಳೆಸುವುದರಿಂದ 'ಧಾತೃ'. ತಂದೆಗಿಂತಲೂ ಹಿರಿಯನಾದ್ದರಿಂದ 'ಪಿತಾಮಹ'] ಜಗವೆಲ್ಲಾ ತಿಳಿಯಬೇಕಾದವನು. ಜಗಕೆ ಪಾವನನಾದವನು. ಓಂಕಾರದಿಂದ, ಋಗ್ವೇದ-ಸಾಮವೇದ-ಯಜುರ್ವೇದಗಳಿಂದ ವಾಚ್ಯನಾದವನು. ['ಓಂ' ಎಂದು ಕರೆಸಿಕೊಳ್ಳುವುದರಿಂದ 'ಓಂಕಾರ'. ಪೂಜನೀಯನಾದ್ದರಿಂದ 'ಋಕ್'. ಸಮಾನನಾದ್ದರಿಂದ 'ಸಾಮ'. ಯಜ್ಞಗಳಿಂದ ಆರಾಧ್ಯನಾದ್ದರಿಂದ 'ಯಜುಸ್']

ಬದುಕಿನ ಸಂಬಂಧಗಳಿಗೆ ಸಂಬಂಧಿಸಿ ಭಗವಂತನ ಉಪಾಸನೆಯನ್ನು ಕೃಷ್ಣ ಇಲ್ಲಿ ವಿವರಿಸುತ್ತಾನೆ. ಕೃಷ್ಣ ಹೇಳುತ್ತಾನೆ "ಪಿತಾ ಅಹಮ್ ಅಸ್ಯ ಜಗತಃ ಮಾತಾ ಧಾತಾ ಪಿತಾಮಹಃ" ಎಂದು. ಅಂದರೆ "ನಾನೇ ತಂದೆ, ನಾನೇ ತಾಯಿ, ನಾನೇ ಧಾರಕ ಮತ್ತು ಪಿತಾಮಹ". ನಮಗೆ ತಿಳಿದಂತೆ ಒಬ್ಬರು ತಂದೆಯಾಗಬಹುದು ಅಥವಾ ತಾಯಿಯಾಗಬಹುದು. ಆದರೆ ಒಬ್ಬರೇ ತಾಯಿ-ತಂದೆ ಎರಡೂ ಆಗುವುದು ಸಾಧ್ಯವಿಲ್ಲ. ಇದು ಭಗವಂತನಲ್ಲಿ ಮಾತ್ರ ಸಾಧ್ಯ. ಭಗವಂತ ಎಲ್ಲರಿಗೂ ಅಪ್ಪ ಮತ್ತು ಎಲ್ಲರಿಗೂ ಅಮ್ಮ. ತಂದೆಯೊಳಗೆ 'ತಂದೆ'ಯಾಗಿ, ತಾಯಿಯೊಳಗೆ 'ತಾಯಿ'ಯಾಗಿ ತುಂಬಿರುವ ಶಕ್ತಿ ಆ ಭಗವಂತ. ಇದನ್ನು ನಾವು ಈ ರೀತಿ ಸ್ತುತಿಸುತ್ತೇವೆ:

ತ್ವಮೇವ ಮಾತಾಚ ಪಿತಾ ತ್ವಮೇವ, ತ್ವಮೇವ ಬಂಧುಶ್ಚ ಸಖಾ ತ್ವಮೇವ

ತ್ವಮೇವ ವಿದ್ಯಾ ದ್ರವಿಣಂ ತ್ವಮೇವ, ತ್ವಮೇವ ಸರ್ವಂ ಮಮ ದೇವ ದೇವ

ಗಾಯತ್ರಿಯಲ್ಲಿ ಮೂಲತಃ ಈ ಅನುಷ್ಠಾನವಿದೆ. "ತತ್ಸವಿತುರ್ವರೇಣ್ಯಂ ಭರ್ಗಃ" ಎನ್ನುವಲ್ಲಿ ಭಗವಂತ ಜಗತ್ತನ್ನು ಸೃಷ್ಟಿ ಮಾಡಿದ ತಂದೆ ಎನ್ನುವ ಅರ್ಥವಿದೆ. 'ಸವಿತ'. ಎಂದರೆ ಜಗತ್ತನ್ನು ಹೆತ್ತವನು ಎಂದರ್ಥ. ಪ್ರಳಯಕಾಲದಲ್ಲಿ ಜಗತ್ತನ್ನು ತನ್ನ ಉದರದಲ್ಲಿ ಧರಿಸಿ, ಸೃಷ್ಟಿ ಕಾಲದಲ್ಲಿ ಅದನ್ನು ಭಗವಂತ ಹೆತ್ತ. ಹೆತ್ತು ಹೊತ್ತು ಸಲಹುವವಳು 'ತಾಯಿ'-ಆದ್ದರಿಂದ ಭಗವಂತ ತಾಯಿಯೂ ಹೌದು. ಅಷ್ಟೇ ಅಲ್ಲ, ಪ್ರತಿಯೊಬ್ಬ ತಾಯಿಯೊಳಗಿದ್ದು ಆ ತಾಯಿಯ ತಾಯ್ತನವನ್ನು ಜಾಗೃತಗೊಳಿಸಿ, ತಾಯಿಯೊಳಗೆ ತಾಯಿಯಾಗಿ ತುಂಬಿರುವ ಭಗವಂತ, ಎಲ್ಲಾ ತಂದೆಯಂದಿರ ಒಳಗೂ ಇದ್ದು, ಅವರಲ್ಲಿ ಪಿತೃತ್ವ ಜಾಗೃತಗೊಳಿಸುವ ತಂದೆ. ಪಿತಾ ಅನ್ನುವ ಪದದ ನಿರ್ವಚನ ನೋಡಿದರೆ 'ತಂದೆ' ಅನ್ನುವುದು ಕೇವಲ ರೂಢಿ ಅರ್ಥ. ಶ್ರುತಿಯಲ್ಲಿ ಹೀಗೆ ಹೇಳುತ್ತಾರೆ:

ಯೋ ನಃ ಪಿತಾ ಜನಿತಾ ಯೋ ವಿಧಾತಾ ಧಾಮಾನಿ ವೇದ ಭುವನಾನಿ ವಿಶ್ವಾ|

ಯೋ ದೇವಾನಾಂ ನಾಮಧಾ ಏಕ ಏವ ತಂ ಸಂಪ್ರಶ್ನಂ ಭುವನಾ ಯಂತ್ಯನ್ಯಾ||

ಇಲ್ಲಿ ಪಿತಾ ಮತ್ತು ಜನಕನನ್ನು ಬೇರೆ ಬೇರೆಯಾಗಿ ಹೇಳುತ್ತಾರೆ. ಅವನು ನಮ್ಮ ತಂದೆ, ಅವನು ನಮ್ಮ ಜನಕ. ಅಂದರೆ: ಹುಟ್ಟಿಸಿದವನೂ ಅವನೇ, ರಕ್ಷಕನೂ ಅವನೇ.

ಲೋಕದಲ್ಲಿ ಗಂಡು ಹೆಣ್ಣಲ್ಲ, ಹೆಣ್ಣು ಗಂಡಲ್ಲ. ಆದರೆ ಭಗವಂತ ಎಲ್ಲರ ಬಿಂಬರೂಪ. ಆದ್ದರಿಂದ ಭಗವಂತ ಉಭಯಲಿಂಗ-ಆತ ಸ್ತ್ರೀಪುಂಸಕ. ಆದರೆ ಆತನಲ್ಲಿ ಸ್ತ್ರೀಯಲ್ಲಿರುವ ದೋಷವಾಗಲೀ, ಪುರುಷನಲ್ಲಿರುವ ದೋಷವಾಗಲೀ ಇಲ್ಲ. ಆದ್ದರಿಂದ ಆತ ಲಿಂಗಾತೀತಕೂಡಾ ಹೌದು.[ಇದನ್ನು ನಾವು ಭಗವಂತನ ನಾಮಾವಳಿಗಳಲ್ಲಿ ಕಾಣಬಹುದು].

ಭಗವಂತನೇ 'ಧಾತಾ'. ಆತ ಅನಾಧಿ ಅನಂತಕಾಲದಲ್ಲಿ ಈ ಜಗತ್ತಿನ ಧಾರಣೆ ಮತ್ತು ಪೋಷಣೆ ಮಾಡುವವ. ಚತುರ್ಮುಖ ಬ್ರಹ್ಮನೊಳಗಿದ್ದು, ಪಿತಾಮಹ ಶಬ್ದ ವಾಚ್ಯನಾಗಿರುವವ ಭಗವಂತ.

ಇಲ್ಲಿ ಕೃಷ್ಣ ಕೇವಲ ಮುಖ್ಯವಾದ ಸಂಬಂಧವನ್ನು ಮಾತ್ರ ಹೇಳಿದ. ಇದರರ್ಥ ಎಲ್ಲಾ ಸಂಬಂಧದಲ್ಲಿಯೂ ಆ ಭಾವವನ್ನು ಜಾಗೃತಗೊಳಿಸುವವ ಅಂತರ್ಯಾಮಿ ಭಗವಂತ ಎಂಬುದು. ಪ್ರತಿಯೊಂದು ಸಂಬಂಧದ ಹಿಂದೆ ಭಗವಂತನ ಸಂಬಂಧವಿದೆ. ಆದರೆ ನಮಗೆ ಆ ಕಲ್ಪನೆ ಇರುವುದಿಲ್ಲ. ಆಯಾ ಜೀವದ ಪ್ರಾರಾಬ್ಧ ಕರ್ಮಕ್ಕನುಗುಣವಾಗಿ ಸಂಬಂಧಗಳು. ಅಲ್ಲಿರುವ ಪ್ರೀತಿ, ಮಮತೆ, ಶತ್ರುತ್ವ ಎಲ್ಲವೂ ಭಗವಂತನ ಕಾರ್ಯಕ್ರಮ. ಇದನ್ನು ನಾವು ತಿಳಿದಾಗ ನಮ್ಮ ಜೀವನ ಸುಗಮ. ಒಬ್ಬರು ನಮ್ಮನ್ನು ದ್ವೇಷಿಸಿದಾಗ ಕುಗ್ಗುವ ಅಗತ್ಯವಾಗಲೀ, ಒಬ್ಬರು ನಮ್ಮನ್ನು ಪ್ರೀತಿಸಿದಾಗ ಹಿಗ್ಗುವ ಅಗತ್ಯವಾಗಲೀ ಇಲ್ಲ. ಎಲ್ಲವೂ ನಮ್ಮ ಜೀವಸ್ವಭಾವ ಮತ್ತು ಪ್ರರಾಬ್ಧಕರ್ಮಕ್ಕನುಗುಣವಾಗಿ ಭಗವಂತನ ಲೀಲೆ ಎನ್ನುವ ಎಚ್ಚರ ಇಲ್ಲಿ ಬಹಳ ಮುಖ್ಯ. ಇದಕ್ಕೆ ಒಂದು ಉತ್ತಮ ದೃಷ್ಟಾಂತ ಭಾಗವತದಲ್ಲಿ ಬರುವ ವೃತ್ರ ಮತ್ತು ಇಂದ್ರನ ಯುದ್ಧದ ಕಥೆ: ಇಂದ್ರನನ್ನು ಕೊಲ್ಲಲು ಹೊರಟ 'ವೃತ್ರ'ನ ತಂದೆ ತ್ವಷ್ಠ ಎಂಬುವನು ಉಚ್ಚರಿಸಿದ ಮಂತ್ರದಲ್ಲಿ ಒಂದು ಸ್ವರ ತಪ್ಪಾಗಿದ್ದರಿಂದ-ವೃತ್ರನಿಂದ ಇಂದ್ರಹತ್ಯೆಯಾಗುವ ಬದಲು, ಇಂದ್ರನೇ ವೃತ್ರನನ್ನು ಕೊಲ್ಲುವಂತಾಯಿತು. ವೃತ್ರ ಮತ್ತು ಇಂದ್ರರ ಯುದ್ಧದಲ್ಲಿ ಇಂದ್ರ ಮಹಾಜ್ಞಾನಿಯಾದ ವೃತ್ರನನ್ನು ಕೊಲ್ಲಲು ಹಿಂದೇಟು ಹಾಕುತ್ತಾನೆ. ಆಗ ವೃತ್ರ ಹೇಳುತ್ತಾನೆ: "ಸಂಕೋಚ ಪಡಬೇಡ ಇಂದ್ರ, ನನ್ನನ್ನು ಕೊಂದುಬಿಡು. ಏಕೆಂದರೆ ಈ ನಾಟಕದಲ್ಲಿ ಭಗವಂತ ನಿನಗೆ ಕೊಲ್ಲುವ ಪಾತ್ರವನ್ನೂ ಮತ್ತು ನನಗೆ ಸಾಯುವ ಪಾತ್ರವನ್ನೂ ಕೊಟ್ಟಿದ್ದಾನೆ. ನಾವು ಅದನ್ನು ಅಭಿನಯಿಸಬೇಕು ಅಷ್ಟೇ" ಎಂದು. ಈ ರೀತಿ

ಎಚ್ಚರವಿದ್ದರೆ ನಮಗೆ ಇನ್ನೊಬ್ಬರು ಬೈದಾಗ ಅಥವಾ ದ್ವೇಷಿಸಿದಾಗ ಬೇಸರವಾಗುವುದಿಲ್ಲ. ಎಲ್ಲವೂ ಭಗವಂತನ ವ್ಯವಸ್ಥೆ ಎಂದು ತಿಳಿದಾಗ ಎಲ್ಲವೂ ಏಕರೂಪವಾಗಿ ಕಾಣುತ್ತದೆ. ದ್ವೇಷ ಮತ್ತು ಪ್ರೀತಿ ಸಹಜವಾಗಿ ಬಿಡುತ್ತದೆ. ಸಂಬಂಧ ಕಳಚಿದಾಗ ಕುಗ್ಗುವುದಾಗಲೀ, ಬೆಸೆದಾಗ ಹಿಗ್ಗುವುದಾಗಲೀ ಇರುವುದಿಲ್ಲ. ಇದು ಬಹಳ ಎತ್ತರದ ಸ್ಥಿತಿ. ಒಟ್ಟಿನಲ್ಲಿ ಕೃಷ್ಣ ಇಲ್ಲಿ ಹೇಳಿರುವ ವಿಚಾರವೆಂದರೆ: ಎಲ್ಲಾ ಸಂಬಂಧದ ಹಿಂದೆ ಇರುವವನು ಆ ಭಗವಂತ. ಎಲ್ಲರ ಒಳಗೂ 'ಎಲ್ಲರೂ' ಆಗಿ ಆತ ತುಂಬಿದ್ದಾನೆ. ಒಂದೊಂದು ರೂಪದಲ್ಲಿ, ಅವರವರಲ್ಲಿ, ಆಯಾ ಕ್ರಿಯೆಗಳನ್ನು ಮಾಡಿಸುತ್ತಾನೆ. ಇದು ನಾವು ಅನುಸಂಧಾನ ಮಾಡಬೇಕಾದ ವಿಜ್ಞಾನ.

ಕ್ರಿಯೆ, ಸಂಬಂಧಗಳನ್ನು ವಿವರಿಸಿದ ಕೃಷ್ಣ ಈಗ ಜ್ಞಾನದ ಬಗ್ಗೆ ವಿವರಿಸುತ್ತಾನೆ. ಕೃಷ್ಣ ಹೇಳುತ್ತಾನೆ "ವೇದ್ಯಂ ಪವಿತ್ರಮೋಂಕಾರ ಋಕ್ ಸಾಮ ಯಜುರೇವ ಚ" ಎಂದು. ನಾಮಾತ್ಮಕವಾದ ಈ ಪ್ರಪಂಚದ ಎಲ್ಲಾ ನಾಮಗಳ ಮೂಲ 'ಓಂ'. ಕೃಷ್ಣ ಹೇಳುತ್ತಾನೆ: "ನಾನು ಓಂಕಾರ" ಎಂದು. ಪ್ರಪಂಚದಲ್ಲಿನ ಎಲ್ಲಾ ಶಬ್ದವೂ ಹುಟ್ಟಿದ್ದು ಓಂಕಾರದಿಂದ. ಆದ್ದರಿಂದ ಭಗವಂತ ಸರ್ವಶಬ್ದವಾಚ್ಯ. ಸಂಸ್ಕೃತದಲ್ಲಿನ ಎಲ್ಲಾ ಶಬ್ದಗಳೂ ಕೂಡಾ ಓಂಕಾರದಿಂದ ಆವಿರ್ಭಾವಗೊಂಡ ಶಬ್ದಗಳು. ಅದು ಹೇಗೆಂದು ಸಂಕ್ಷಿಪ್ತವಾಗಿ ನೋಡೋಣ:

ವೈದಿಕವಾಙ್ಮಯದ ಮೂಲಾಕ್ಷರವಾದ ಓಂಕಾರದಲ್ಲಿ ಎಂಟು ಅಕ್ಷರಗಳು: ಅಕಾರ, ಉಕಾರ, ಮಕಾರ, ನಾದ, ಬಿಂದು, ಕಲೆ, ಶಾಂತ, ಅತಿಶಾಂತ. ಇದರಿಂದ ವ್ಯಕ್ತವಾದದ್ದು ನಾರಾಯಣ ಅಷ್ಟಾಕ್ಷರ: 'ಓಂ ನಮೋ ನಾರಾಯಣಾಯಃ'. ಓಂಕಾರದ ಎಂಟು ಮೂಲವರ್ಣಗಳಿಂದ ಅಕ್ಷರ ಮಾಲಿಕೆಯ ಎಂಟು ವರ್ಗಗಳು ರೂಪುಗೊಂಡವು:

೧. ಸ್ವರಾಕ್ಷರಗಳು: ಅ ಆ ಇ ಈ ಉ ಊ ಋ ೠ ಎ ಏ ಐ ಒ ಓ ಔ ಅಂ ಅಃ

೨. ಕ-ವರ್ಗ: ಕ ಖ ಗ ಘ ಙ

೩. ಚ-ವರ್ಗ: ಚ ಛ ಜ ಝ ಞ

೪. ಟ-ವರ್ಗ : ಟ ಠ ಡ ಢ ಣ

೫. ತ-ವರ್ಗ: ತ ಥ ದ ಧ ನ

೬. ಪ-ವರ್ಗ: ಪ ಫ ಬ ಭ ಮ

೭.ಅಂತಸ್ಥಾಕ್ಷರಗಳು: ಯ ರ ಲ ವ

೮. ಕೊನೆಯ ಆರು ಅಕ್ಷರಗಳು: ಶ ಷ ಸ ಹ ಳ ಕ್ಷ

ಒಟ್ಟು 'ಅ' ದಿಂದ 'ಕ್ಷ' ತನಕ ಐವತ್ತೊಂದು ಅಕ್ಷರಗಳು(ಅ ದಿಂದ ಕ್ಷ ತನಕ ಆದ್ದರಿಂದ ಅ-ಕ್ಷ-ರ). ಇಡೀ ಪ್ರಪಂಚದಲ್ಲಿರುವ ಎಲ್ಲಾ ಶಬ್ದಗಳೂ ಈ ಅಕ್ಷರಗಳ ಸಂಯೋಜನೆ. ಎಲ್ಲಾ ಶಬ್ದಗಳೂ ಓಂಕಾರದಿಂದ ಹುಟ್ಟಿರುವುದರಿಂದ ಓಂಕಾರ ವಾಚ್ಯ ಭಗವಂತ ಸರ್ವಶಬ್ದ ವಾಚ್ಯ. ಆದ್ದರಿಂದ ಎಲ್ಲಾ ಶಬ್ದಗಳ ಮೂಲಭೂತ ಪವಿತ್ರ ಅರ್ಥ ಭಗವಂತನನ್ನು ಹೇಳುತ್ತದೆ. ದೋಷವನ್ನು ಹೇಳುವ ಪದಗಳೂ ಕೂಡಾ ಭಗವಂತನಲ್ಲಿ ಕೇವಲ ಪವಿತ್ರ ಅರ್ಥವನ್ನು ಮಾತ್ರ ಹೇಳುತ್ತವೆ. ಉದಾಹರಣೆಗೆ 'ದುಃಖಿ'. ಇದು ಭಗವಂತನಲ್ಲಿ ಹೇಳುವಾಗ 'ದುಃಖದ ಒಡೆಯ ಎನ್ನುವ ಅರ್ಥವನ್ನು ಕೊಡುತ್ತದೆ.

ಐವತ್ತೊಂದು ಅಕ್ಷರಗಳಿಂದ(ಮಾತೃಕೆಗಳಿಂದ) ವಾಚ್ಯನಾದ ಭಗವಂತನ ರೂಪಗಳೂ ಐವತ್ತೊಂದು:

೧. ಅಜ, ೨. ಆನಂದ, ೩. ಇಂದ್ರ, ೩. ಈಶ, ೪. ಉಗ್ರ, ೫. ಊರ್ಜ, ೭. ಋತಂಭರ, ೮. ಋಘ, ೯. ಲ್ ಶ, ೧೦. ಲ್ೀಜಿ, ೧೧. ಏಕಾತ್ಮ , ೧೨. ಐರ, ೧೩. ಓಜೋಭೃತ್, ೧೪. ಔರಸ, ೧೫. ಅಂತ, ೧೬. ಅರ್ಧಗರ್ಭ, ೧೭. ಕಪಿಲ, ೧೮. ಖಪತಿ, ೧೯. ಗರುಡಾಸನ, ೨೦. ಘರ್ಮ, ೨೧. ಙಸಾರ ೨೨. ಚಾರ್ವಾಂಗ, ೨೩. ಛಂದೋಗಮ್ಯ, ೨೪. ಜನಾರ್ದನ, ೨೫. ಝೂಟಿತಾರಿ, ೨೬. ಞಮ, ೨೭.ಟಂಕಿ, ೨೮.ಠಕಲ, ೨೯. ಡರಕ, ೩೦.ಢರಿ, ೩೧. ಣಾತ್ಮ, ೩೨. ತಾರ, ೩೩. ಥಭ, ೩೪. ದಂಡಿ, ೩೫. ಧನ್ವಿ, ೩೬. ನಮ್ಯ, ೩೭. ಪರ, ೩೮. ಫಲಿ, ೩೯. ಬಲಿ, ೪೦. ಭಗ, ೪೧. ಮನು, ೪೨. ಯಜ್ಞ, ೪೩. ರಾಮ, ೪೪. ಲಕ್ಷ್ಮೀಪತಿ, ೪೫. ವರ, ೪೬. ಶಾಂತಸಂವಿತ್, ೪೭. ಷಡ್ಗುಣ, ೪೮. ಸಾರಾತ್ಮ, ೪೯. ಹಂಸ, ೫೦. ಳಾಳುಕ, ೫೧. ನೃಸಿಂಹ[ನೃಹರ್ಯಕ್ಷ].

ಓಂಕಾರದ ಮೂಲ ಮೂರಕ್ಷರ ಅ-ಉ-ಮ ಪದ್ಯ-ಗದ್ಯ-ಗಾನ. ಇದು ಮೂರು ರೂಪದ ವೇದವನ್ನು ಮತ್ತು ವೇದ ಪ್ರತಿಪಾದ್ಯ ಭಗವಂತನನ್ನು ಹೇಳುತ್ತವೆ. 'ಅ'ಕಾರ ಋಗ್ವೇದಕ್ಕೆ, 'ಉ'ಕಾರ ಯಜುರ್ವೇದಕ್ಕೆ ಮತ್ತು 'ಮ'ಕಾರ ಸಾಮವೇದಕ್ಕೆ ಸಂಬಂಧಪಟ್ಟದ್ದು. ಋಗ್ವೇದ " ಅಗ್ನಿಮೀ"ಳೇ ಪುರೋಹಿತಂ ಯಜ್ಞಸ್ಯ ದೇವಂ-ಋತ್ವಿಜಂ" | ಹೋತಾ"ರಂ ರತ್ನ ಧಾತಮಂ |..." ಎಂದು 'ಅ' ಕಾರದಿಂದ ಪ್ರಾರಂಭವಾಗುತ್ತದೆ. ಮತ್ತು "....ಸಮಾನಮಸ್ತು ವೋ ಮನೋ ಯಥಾ ವಃ ಸುಸಹಾಸತಿ ॥" ಎಂದು 'ಇ'ಕಾರದಲ್ಲಿ ಕೊನೆಗೊಳ್ಳುತ್ತದೆ. ಅಲ್ಲಿಂದ ಮುಂದುವರಿದು ಯಜುರ್ವೇದ "ಇಷೇ ತ್ವೋರ್ಜೆ ತ್ವಾ ..." ಎಂದು 'ಇ'ಕಾರದಿಂದ ಪ್ರಾರಂಭವಾಗಿ "........ಸಮುದ್ರೋ ಬಂಧುಃ" ಎಂದು 'ಉ'ಕಾರದಲ್ಲಿ ಕೊನೆಗೊಳ್ಳುತ್ತದೆ. ಹೀಗೆ ಓಂಕಾರದಲ್ಲಿನ 'ಅ'ಕಾರ ಮತ್ತು 'ಉ'ಕಾರ ಋಗ್ವೇದ ಮತ್ತು ಯಜುರ್ವೇದವನ್ನು ಪೂರ್ಣವಾಗಿ ಸೂಚಿಸುವ ಸಂಕ್ಷೇಪಣಾ(abbreviation)ರೂಪ. ಇಲ್ಲಿಂದ ಮುಂದೆ ಸಾಮವೇದ. ಸಾಮವೇದ "ಅಗ್ನ ಆ ಯಾಹಿ ........." ಎಂದು 'ಅ'ಕಾರದಿಂದ ಆರಂಭವಾಗಿ "......ಬ್ರ ಸ್ವತಿರ್ದಧಾತು" ಎಂದು 'ಉ'ಕಾರದಲ್ಲಿ ಕೊನೆಗೊಳ್ಳುತ್ತದೆ. ಆದ್ದರಿಂದ ಇಲ್ಲಿ 'ಮ' ಕಾರ ಬಂದಿಲ್ಲ. ಆದರೆ ನಮಗೆ ತಿಳಿದಂತೆ ಸಾಮವೇದ ನಾದ ರೂಪದಲ್ಲಿದೆ. ಓಂಕಾರದಲ್ಲಿ ಕೂಡಾ 'ಮ' ಎನ್ನುವುದು ನಾದರೂಪದಲ್ಲಿ ಹೊರ ಹೊಮ್ಮುವ ಅಕ್ಷರ- ಅದು ಸಂಗೀತ. ಹೀಗೆ ಓಂಕಾರ ವೇದದ ಸಂಕ್ಷೇಪಣಾರೂಪ ಬೀಜಾಕ್ಷರ. ಇದು ನಮಗೆ ವೇದವನ್ನು ಗುರುತಿಸುವ ಮಾರ್ಗದರ್ಶಿ. ಆದ್ದರಿಂದ ಓಂಕಾರ ಭಗವಂತನನ್ನು ಸ್ತೋತ್ರ ಮಾಡುವ ಮಂತ್ರಗಳಲ್ಲಿ ಅತ್ಯಂತ ಪ್ರಕೃಷ್ಟವಾದುದ್ದು. ಇದಕ್ಕಿಂತ ದೊಡ್ಡ ಸ್ತೋತ್ರಮಾಡುವ ಶಬ್ದ ಈ ಪ್ರಪಂಚದಲ್ಲಿಲ್ಲ. ಈ ಕಾರಣದಿಂದ ಓಂಕಾರ ಭಗವಂತನನ್ನು ನಾವು ಕರೆಯಲು ಬಳಸುವ ಅವನ ವಿಶೇಷ(Exclusive)ನಾಮ.

ಓಂಕಾರ ವಿಸ್ತೃತವಾದಾಗ ವ್ಯಾಹೃತಿ, ವ್ಯಾಹೃತಿ ವಿಸ್ತಾರವಾಗಿ ಗಾಯತ್ರಿ, ಗಾಯತ್ರಿ ವಿಸ್ತಾರವಾಗಿ ಕುರುಡ ಸೂಕ್ತ, ನಂತರ ಮೂರು ವೇದಗಳು, ಅಲ್ಲಿಂದ ಸಮಸ್ತ ವೇದಗಳು. ಹೀಗೆ ಪ್ರಣವದಲ್ಲಿ, ವ್ಯಾಹೃತಿಯಲ್ಲಿ, ಪುರುಷ ಸೂಕ್ತದಲ್ಲಿ, ಸಮಸ್ತವೇದಗಳಲ್ಲಿ ಭಗವಂತ ನೆಲೆಸಿದ್ದಾನೆ. ಓಂಕಾರದ ಬಗ್ಗೆ ಇನ್ನೂ ಅನೇಕ ವಿವರಗಳನ್ನು ಈಗಾಗಲೇ ಅಧ್ಯಾಯ ಏಳರಲ್ಲಿ(ಶ್ಲೋಕ -೦೮) ವಿಶೇಷವಾಗಿ ವಿವರಿಸಲಾಗಿದೆ.

ವೇದದ ಶಬ್ದಗಳಿಂದಲೇ ಹುಟ್ಟಿ ಬಂದ ಪ್ರಪಂಚದ ಎಲ್ಲಾ ಶಬ್ದದಲ್ಲೂ ಎಲ್ಲಾ ಲೌಕಿಕ ನಾದದಲ್ಲೂ ತುಂಬಿದ ಭಗವಂತ, ಆಕಾಶದಲ್ಲಿ ಅನಂತ ಶಬ್ದಗಳನ್ನೂ, ಅನಂತ ನಾದಗಳನ್ನೂ ಸೃಷ್ಟಿ ಮಾಡಿದ. ನಮಗೆ ಶಬ್ದದಿಂದ ಅನಂತ ಅನುಭವವನ್ನು ಕೊಟ್ಟು, ಆ ಶಬ್ದವನ್ನು ಗ್ರಹಿಸುವ ಮತ್ತು ಗ್ರಹಿಸಿ ಪುನರುಚ್ಚರಿಸುವ ವಿಶೇಷ ಶಕ್ತಿಯನ್ನು ಕರುಣಿಸಿದ. ಜ್ಞಾನದ ಮೂಲಕ ಈ ಶಬ್ದ ನಾಮಕ ಭಗವಂತನನ್ನು ತಿಳಿಯುವ ವಿಶೇಷ ಶಕ್ತಿ ಮಾನವನಿಗೆ ಭಗವಂತನ ವಿಶೇಷ ಕೊಡುಗೆ.

ಭಗವಂತ 'ಋಕ್': ಯಾವುದರಿಂದ ನಾವು ಭಗವಂತನನ್ನು ಅರ್ಚನೆ ಮಾಡುತ್ತೇವೋ ಅದು ಋಕ್. ನಾಉವು ಅರ್ಚನೆ ಮಾಡುವುದು ಮಂತ್ರಗಳ ಮೂಲಕ. ಯಾರು ಅರ್ಚಿಸಲ್ಪಡುತ್ತಾನೋ ಅವನು 'ಋಕ್' ನಾಮಕ ಭಗವಂತ. ಎಲ್ಲಾ ಮಂತ್ರಗಳಿಂದ ಅರ್ಚಿಸಲ್ಪಡುವವ-ಸ್ತುತಿಗೆ ಪಾತ್ರನಾದ ಭಗವಂತ 'ಋಕ್'

ಭಗವಂತ 'ಸಾಮಃ': ಎಲ್ಲವನ್ನು ಸಮೀಕರಿಸಿದವನು. ತನ್ನ ಎಲ್ಲಾ ರೂಪದಲ್ಲಿ ಜ್ಞಾನಾನಂದಾದಿ ಗುಣಗಳಿಂದ ಸಮನಾದ್ದರಿಂದ ಮತ್ತು ಅವರವರ ಯೋಗ್ಯತೆಗೆ ಸಮನಾಗಿ ಜೀವನ ಕೊಡುವ ಭಗವಂತ 'ಸಾಮಃ'.

ಭಗವಂತ 'ಯಜುಸ್': ಎಲ್ಲಾ ಯಾಗಗಳಿಂದ ಹೋಮಿಸಲ್ಪಡುವ, ವೇದಗಳಲ್ಲಿ ಸನ್ನಿಹಿತನಾಗಿರುವ ಸರ್ವಶಬ್ದವಾಚ್ಯ ಭಗವಂತ 'ಯಜುಸ್'.

ಗತಿರ್ಭರ್ತಾ ಪ್ರಭುಃ ಸಾಕ್ಷೀ ನಿವಾಸಃ ಶರಣಂ ಸುಹೃತ್ ।
ಪ್ರಭವಃ ಪ್ರಳಯಃ ಸ್ಥಾನಂ ನಿಧಾನಂ ಬೀಜಮವ್ಯಯಮ್ ॥೧೮॥

ಗತಿಃ ಭರ್ತಾ ಪ್ರಭುಃ ಸಾಕ್ಷೀ ನಿವಾಸಃ ಶರಣಮ್ ಸುಹೃತ್ ।

ಪ್ರಭವಃ ಪ್ರಳಯಃ ಸ್ಥಾನಮ್ ನಿಧಾನಮ್ ಬೀಜಮ್ ಅವ್ಯಯಮ್-ಮುಕ್ತಿಗಾಗಿ ತಿಳಿಯಬೇಕಾದವನು. ಎಲ್ಲಾ ಹೊಣೆಯನ್ನು ಹೊತ್ತವನು. ಎಲ್ಲದರ ಒಡೆಯ. ಎಲ್ಲವನ್ನು ನೇರ ಕಾಣಬಲ್ಲವನು. ಎಲ್ಲರ ನೆಲೆ. ಮುಕ್ತರಿಗೂ ಆಸರೆ. ಅನಿಮಿತ್ತ ಬಂಧು. ಸೃಷ್ಟಿ-ಸ್ಥಿತಿ-ಪ್ರಳಯಗಳಿಗೆ ಕಾರಣ. ಪ್ರಳಯದಲ್ಲಿ ಜಗವನ್ನು ಬಸಿರಲ್ಲಿ ಹೊತ್ತವನು. ಮತ್ತೆ ಜಗದ ಅಭಿವ್ಯಕ್ತಿಗೆ ಕಾರಣನಾದವನು. ಅಳಿವಿರದವನು.

ಸಂಬಂಧಗಳ ಬಗ್ಗೆ ಹಿಂದೆ ಹೇಳಿದ್ದ ಕೃಷ್ಣ ಇಲ್ಲಿ ನಾನಾ ವಿಧದ ಅನುಬಂಧಗಳನ್ನು ಹೇಳುತ್ತಾನೆ. ಬೇರೆಬೇರೆ ರೀತಿಯಾಗಿ ಸಮಾಜದಲ್ಲಿ ಒಬ್ಬರಿಂದ ಒಬ್ಬರು ನೆರವು ಪಡೆಯುತ್ತಾರೆ. ರಾಜನಿಂದ ರಕ್ಷಣೆ, ಆಪತ್ಕಾಲದಲ್ಲಿ ಆಶ್ರಯ, ಕಷ್ಟದಲ್ಲಿರುವವನನ್ನು ಸಂತೈಸುವುದು, ಗೆಳೆತನ ಇತ್ಯಾದಿ ಅನುಬಂಧಗಳು. ಇವೆಲ್ಲವೂ ಭಗವಂತನ ಧರ್ಮ ಎನ್ನುತ್ತಾನೆ ಕೃಷ್ಣ.

ಯಾರೂ ನೆಲೆಯೇ ಇಲ್ಲ, ಬದುಕುವುದಕ್ಕೆ ಅವಕಾಶವೇ ಇಲ್ಲ ಅನ್ನುವಾಗ 'ನಾನಿದ್ದೇನೆ' ಎಂದು ರಕ್ಷಣೆ ಮಾಡುವವರನ್ನು 'ಗತಿ' ಎನ್ನುತ್ತಾರೆ. ವಾಸ್ತವವಾಗಿ ಗತಿ ಎಂದರೆ ಕೊನೆಯ ಗತಿ. ಸಂಸಾರದಲ್ಲಿ ಮಾತ್ರ ಅಲ್ಲ ಮೋಕ್ಷದಲ್ಲೂ ಆಶ್ರಯವಾಗಿರುವ ಭಗವಂತ ಗತಿಃ. ಆತನೇ ಸದ್ಗತಿ, ತಪ್ಪು ಮಾಡಿದಾಗ ಆತನೇ ದುರ್ಗತಿ ಕೂಡಾ. ಎಲ್ಲಾ ಹೊಣೆಯನ್ನೂ ಹೊತ್ತು, ಪ್ರಪಂಚದಲ್ಲಿ ಪ್ರತಿಯೊಬ್ಬರೂ ಏನು ಮಾಡುತ್ತಾರೆ, ಅವರ ಒಳಿತು ಕೆಡುಕುಗಳೇನು ಎಂದು ನೋಡಬಲ್ಲ ಪ್ರಭು ಭಗವಂತ. ಆತ ನಮ್ಮ ಅಂತರಂಗ ಬಹಿರಂಗ ಎಲ್ಲವನ್ನೂ ಬಲ್ಲವ. ಆತ ಎಲ್ಲೆಡೆ ತುಂಬಿ ಎಲ್ಲವನ್ನೂ ಕಾಣಬಲ್ಲ ನಿಜವಾದ ಸಾಕ್ಷಿ.

ಮುಂದುವರಿದು ಕೃಷ್ಣ ಹೇಳುತ್ತಾನೆ "ಅಹಮ್ ನಿವಾಸಃ" ಎಂದು. ಈಶಾವಾಸ್ಯೋಪನಿಷತ್ತಿನಲ್ಲಿ ಹೇಳುವಂತೆ:

ಈಶಾವಾಸ್ಯಂ ಇದಂ ಸರ್ವಂ ಯತ್ ಕಿಂ ಚ ಜಗತ್ಯಾಂ ಜಗತ್ ।
ತೇನ ತ್ಯಕ್ತೇನ ಭೂಂಜಿಥಾಃ ಮಾ ಗೃಧಃ ಕಸ್ಯ ಸ್ವಿದ್ ಧನಮ್।

ನಾವು ವಾಸ ಮಾಡುತ್ತಿರುವುದೇ ಭಗವಂತನ ಮನೆಯಲ್ಲಿ. ಈ ವಿಶ್ವವೆಂಬ ಮನೆಯನ್ನು ನಿರ್ಮಿಸಿ, ಅದರಲ್ಲಿ ನಮಗೆ ಆಶ್ರಯ ಕೊಟ್ಟು, ನಮಗೆ ಬದುಕಲು ಬೇಕಾದ ವ್ಯವಸ್ಥೆ ಮಾಡಿದ ಭಗವಂತ ನಿವಾಸಃ. ಆತ ಎಲ್ಲರಿಗೂ ಆಸರೆ. ಇಂತಹ ಭಗವಂತ ನಮಗೆ ಆಪತ್ಕಾಲದಲ್ಲಿ ರಕ್ಷಣೆ(ಶರಣ) ಕೊಡುವ ಆತ್ಮೀಯ ಗೆಳೆಯ(ಸುಹೃತ್).
ಗೆಳೆಯರಲ್ಲಿ ಎರಡು ವಿಧ. ಸಖ ಮತ್ತು ಸುಹೃತ್. 'ಸಖ' ಎಂದರೆ ಒಡನಾಡಿ. ಯಾವಾಗಲೂ ಜೊತೆಗಿರುವವ. ಸುಹೃತ್ ಎಂದರೆ ದೂರದಲ್ಲಿರಲೀ ಹತ್ತಿರವಿರಲೀ ನಮ್ಮ ಹೃದಯಕ್ಕೆ ಸ್ಪಂದಿಸಿ ನಮ್ಮ ಹಿತಚಿಂತಕನಾಗಿರುವವ. ಭಗವಂತ ನಮ್ಮ ಹೃತ್ಕಮಲಮಧ್ಯ ನಿವಾಸಿಯಾಗಿರುವ ಸಖ ಮತ್ತು ನಮ್ಮ ಹೃದಯದ ಕೂಗಿಗೆ ಸದಾ ಸ್ಪಂದಿಸುವ ಸುಹೃತ್.
ಅನುಬಂಧವನ್ನು ಹೇಳಿದ ಕೃಷ್ಣ ಮುಂದೆ ಮನುಷ್ಯ ಶಕ್ತಿಯನ್ನು ಬಿಟ್ಟು ದೇವತಾ ಶಕ್ತಿಯನ್ನು ವಿವರಿಸುತ್ತಾನೆ. ಹೇಳುತ್ತಾನೆ "ಪ್ರಭವಃ ಪ್ರಳಯಃ ಸ್ಥಾನಂ ನಿಧಾನಂ ಬೀಜಮವ್ಯಯಮ್" ಎಂದು. ನಮ್ಮಲ್ಲಿ ಕೆಲವರು ತಿಳಿದಿದ್ದಾರೆ ಸೃಷ್ಟಿಕರ್ತ -ಬ್ರಹ್ಮ, ಸ್ಥಿತಿ-ವಿಷ್ಣು ಮತ್ತು ಸಂಹಾರ-ಶಿವ ಎಂದು. ಇಲ್ಲಿ ಕೃಷ್ಣ ಸ್ಪಷ್ಟವಾಗಿ ಹೇಳುತ್ತಾನೆ: "ನಾನೇ ಪ್ರಭವಃ- ಪ್ರಳಯಃ-ಸ್ಥಾನಂ" ಎಂದು. ಜಗತ್ತಿನ ಸೃಷ್ಟಿಗೆ ಮೂಲ ಕಾರಣ-ಭಗವಂತ. ಸೃಷ್ಟಿಯ ಕೊನೆಯಲ್ಲಿ ಈ ಜಗತ್ತು ನಾಶವಾಗಲು, ಮತ್ತು ಸೃಷ್ಟಿಯಿಂದ ಸಂಹಾರ ತನಕದ ಅವದಿಯಲ್ಲಿ ಸ್ಥಿತಿಗೆ ಮೂಲತಃ ಭಗವಂತನೇ ಕಾರಣ.
ಪ್ರಳಯ ಕಾಲದಲ್ಲಿ ಸಮಸ್ತ ಜೀವಜಾತವನ್ನು ಸೂಕ್ಷ್ಮ ಸ್ಥಿತಿಯಲ್ಲಿ ತನ್ನ ಹೊಟ್ಟೆಯಲ್ಲಿಟ್ಟು ಸಾಕುವವ ಆ ಭಗವಂತ. ಆ ಸೂಕ್ಷ್ಮ ವಸ್ತು ಮತ್ತೆ ಚಿಗುರಿ ಅರಳಿ ಹೆಮ್ಮರವಾಗಿ ಬೆಳೆಯುವಂತೆ ಬೀಜಕ್ಷೇಪ ಮಾಡುವ, ಎಂದೂ ಅಳಿವಿಲ್ಲದ ಅವ್ಯಯ-ಭಗವಂತ.

ಹೀಗೆ ಜಗತ್ತಿನ ಸಮಸ್ತ ಕ್ರಿಯೆಯನ್ನು, ಲೌಕಿಕ , ಪ್ರಾಪಂಚಿಕ, ಪಾರಲೌಕಿಕ, ಸಂಬಂಧಗಳು, ಅನುಬಂಧಗಳು ಎಲ್ಲವನ್ನೂ ವಿವರಿಸಿದ ಕೃಷ್ಣ ಮುಂದೆ ಕಾಲಕಾಲದಲ್ಲಿ ಆಗತಕ್ಕಂತಹ ಸಂಗತಿಗಳನ್ನು ವಿವರಿಸುತ್ತಾನೆ.

ತಪಾಮ್ಯಹಮಹಂ ವರ್ಷಂ ನಿಗೃಹ್ಣಾಮ್ಯುತ್ಸೃಜಾಮಿ ಚ ।
ಅಮೃತಂ ಚೈವ ಮೃತ್ಯುಶ್ಚ ಸದಸಚ್ಚಾಹಮರ್ಜುನ ॥೧೯॥

ತಪಾಮಿ ಅಹಮ್ ಅಹಮ್ ವರ್ಷಮ್ ನಿಗೃಹ್ಣಾಮಿ ಉತ್ಸೃಜಾಮಿ ಚ ।
ಅಮೃತಮ್ ಚ ಏವ ಮೃತ್ಯುಃ ಚ ಸತ್ ಅಸತ್ ಚ ಅಹಮ್ ಅರ್ಜುನ-ನಾನು ಸುಡುತ್ತೇನೆ. ನಾನು ಮಳೆ ಬರದಂತೆ ತಡೆಯುತ್ತೇನೆ; ಮಳೆಗರೆಸುತ್ತೇನೆ. ಸಾವು ಬರದಂತೆ ಮಾಡುತ್ತೇನೆ; ಸಾಯಿಸುತ್ತೇನೆ. ಓ ಅರ್ಜುನಾ, ಕಾಣುವ ಕಾರ್ಯ, ಕಾಣದ ಕಾರಣ ಎಲ್ಲವೂ ನನ್ನಿಂದ.[ಸದ್ಗುಣಗಳ ಸೆಲೆಯಾದ್ದರಿಂದ ನಾನು 'ಸತ್'. ನನ್ನಂಥವ ಇನ್ನೊಬ್ಬ ಇರದ್ದರಿಂದ ನಾನು 'ಅಸತ್']

ಸೂರ್ಯನಲ್ಲಿ ಸನ್ನಿಹಿತನಾಗಿ, ಭೂಮಿಗೆ ಸೌರಶಕ್ತಿಯನ್ನು ಹರಿಸಿ, ಬದುಕು ಕೊಟ್ಟವ ಭಗವಂತ. ಕಾಲ ಕಾಲಕ್ಕೆ ಮಳೆ ಬರುವಂತೆ ಮಾಡುವವನೂ ಅವನೇ; ಅಕಾಲದಲ್ಲಿ ಮಳೆ ಬಾರದಂತೆ ತಡೆಯುವವನೂ ಅವನೇ. ಮಳೆ

ಬರಬೇಕಾದಾಗ ಬಾರದೇ ಇರುವುದು, ಮಳೆ ಬರಬಾರದಾಗ ಬರುವುದೂ ಭಗವಂತನಿಂದಲೇ. ಕಾಣುವ ಕ್ರಿಯೆಯ ಹಿಂದಿನ ಕಾರಣಶಕ್ತಿ ಭಗವಂತ.

ಭಗವಂತ ನಮ್ಮ ಬದುಕಿನಲ್ಲಿ ಉಸಿರು ಕೊಟ್ಟು ಬದುಕಿಸುವ ಅಮೃತ. ಆಯುಸ್ಸು ಮುಗಿದಾಗ ಉಸಿರು ನಿಲ್ಲಿಸಿ ಕರೆಸಿ ಕೊಳ್ಳುವವನೂ ಅವನೇ. ಒಟ್ಟಿನಲ್ಲಿ ಕೃಷ್ಣ ಹೇಳುತ್ತಾನೆ "ಕಣ್ಣಿಗೆ ಕಾಣುವ (ಸತ್), ಕಣ್ಣಿಗೆ ಕಾಣದ (ಅಸತ್) ಸಮಸ್ತ ಪ್ರಪಂಚವನ್ನು ನಿರ್ವಹಿಸುವ ಶಕ್ತಿ ನಾನು" ಎಂದು. ಇದು ಕೃಷ್ಣ ಸೂಕ್ಷ್ಮವಾಗಿ ಭಗವಂತನ ಅನುಸಂಧಾನಕ್ಕೆ ಕೊಟ್ಟಿರುವ ಸಮಗ್ರ ಚಿತ್ರಣ. ಇಲ್ಲಿ ಪೂರ್ಣ ಪ್ರಮಾಣದಲ್ಲಿ ಭಗವಂತನ ಅನುಸಂಧಾನಕ್ಕೆ ಬೇಕಾದ ಸಮಗ್ರ ಸಂಗತಿ ಅಡಗಿದೆ.

ಮುಂದೆ ಕೃಷ್ಣ ತನ್ನ ಭಕ್ತರಲ್ಲಿ(ಜ್ಞಾನಿಗಳಲ್ಲಿ) ಪ್ರಮುಖವಾಗಿ ಎರಡು ವಿಧದ ಭಕ್ತರ ಬಗ್ಗೆ ವಿವರಿಸುತ್ತಾನೆ. ಅವರೆಂದರೆ ತ್ರೈವಿದ್ಯರು ಮತ್ತು ಭಾಗವತರು.

ತ್ರೈವಿದ್ಯಾ ಮಾಂ ಸೋಮಪಾಃ ಪೂತಪಾಪಾಃ ಯಜ್ಞೈರಿಷ್ಟ್ವಾ ಸ್ವರ್ಗತಿಂ ಪ್ರಾರ್ಥಯಂತೇ ।
ತೇ ಪುಣ್ಯಮಾಸಾದ್ಯ ಸುರೇಂದ್ರ ಲೋಕಮಶ್ನಂತಿ ದಿವ್ಯಾನ್ ದಿವಿ ದೇವಭೋಗಾನ್ ॥೨೦॥

ತ್ರೈ ವಿದ್ಯಾಃ ಮಾಮ್ ಸೋಮಪಾಃ ಪೂತ ಪಾಪಾಃ ಯಜ್ಞೈಃ ಇಷ್ಟ್ವಾ ಸ್ವಃ ಗತಿಮ್ ಪ್ರಾರ್ಥಯಂತೇ ।
ತೇ ಪುಣ್ಯಮ್ ಆಸಾದ್ಯ ಸುರ ಇಂದ್ರ ಲೋಕಮ್ ಅಶ್ನಂತಿ ದಿವ್ಯಾನ್ ದಿವಿ ದೇವ ಭೋಗಾನ್ – ತ್ರೈವಿದ್ಯರು ಮೂರು ವೇದಗಳ ಮೊರೆಹೊಕ್ಕ ಹಂಬಲಿಗರು. ಹೊಮಿಸುತ್ತಾ ನನ್ನನಾರಾಧಿಸಿ, ಸೋಮರಸ ಕುಡಿದು, ಪಾಪ ತೊಡೆದು, ಸಗ್ಗದ ದಾರಿಯನ್ನು ಬೇಡುತ್ತಾರೆ. ಅವರು ಪುಣ್ಯದ ಫಲವಾಗಿ ದೇವೇಂದ್ರನ ನಾಡು ಸೇರಿ, ಆ ಸಗ್ಗದಲ್ಲಿ ವೆಗ್ಗಳದ ದೇವಭೋಗಗಳನ್ನು ಉಣ್ಣುತ್ತಾರೆ.

ತ್ರೈವಿದ್ಯರು ಎಂದರೆ ತ್ರಿಪಥಗಾಮಿಗಳು! ಇವರು ಭಗವಂತನ ಜೊತೆಗೆ ಅನೇಕವನ್ನು ಹಂಚಿಕೊಂಡವರು. ಇವರು ಸ್ವರ್ಗದ ಬಯಕೆ, ಲೌಕಿಕ ಬಯಕೆಯನ್ನು ಮುಂದಿಟ್ಟು ಭಗವಂತನಲ್ಲಿ ಭಕ್ತಿ ಮಾಡುತ್ತಾರೆ. ಇವರಿಗೆ ವೇದದಲ್ಲಿ ಹೇಳಿದ ಕರ್ಮಖಂಡವೇ ಮುಖ್ಯವಾಗುತ್ತದೆ. ಜ್ಯೋತಿಷ್ಟೋಮಯ ಯಾಗದಂತಹ ಯಾಗವನ್ನು ಕೇವಲ ಸ್ವರ್ಗದ ಬಯಕೆಯಿಂದ ಮಾಡಿ, ಭಗವಂತನನ್ನು ಬಯಸದೆ ಸ್ವರ್ಗವನ್ನು ಬಯಸುತ್ತಾರೆ. ಹೀಗೆ ಭಕ್ತಿ ಮಾಡುವುದರ ಫಲವಾಗಿ ಅವರು ಇಂದ್ರನ ನಾಡಾದ ಸ್ವರ್ಗವನ್ನು ಸೇರಿ ಅಲ್ಲಿ ಭೋಗವನ್ನು ಅನುಭವಿಸುತ್ತಾರೆ.

ತೇ ತಂ ಭುಕ್ತ್ವಾ ಸ್ವರ್ಗಲೋಕಂ ವಿಶಾಲಂ ಕ್ಷೀಣೇ ಪುಣ್ಯೇ ಮರ್ತ್ಯಲೋಕಂ ವಿಶಂತಿ ।
ಏವಂ ತ್ರಯೀಧರ್ಮಮನುಪ್ರಪನ್ನಾಃ ಗತಾಗತಂ ಕಾಮಕಾಮಾ ಲಭಂತೇ ॥೨೧॥

ತೇ ತಮ್ ಭುಕ್ತ್ವಾ ಸ್ವರ್ಗ ಲೋಕಮ್ ವಿಶಾಲಮ್ ಕ್ಷೀಣೇ ಪುಣ್ಯೇ ಮರ್ತ್ಯ ಲೋಕಮ್ ವಿಶಂತಿ ।
ಏವಮ್ ತ್ರಯೀ ಧರ್ಮಮ್ ಅನುಪ್ರಪನ್ನಾಃ ಗತ ಆಗತಮ್ ಕಾಮ ಕಾಮಾಃ ಲಭಂತೇ – ಅವರು ಹಿರಿದಾದ

ಸಗ್ಗಿಗರ ನಾಡನ್ನು ಕಂಡುಂಡು, ಪುಣ್ಯ ಮುಗಿದಾಗ ಭೂಮಿಗೆ ಮರಳುತ್ತಾರೆ. ಹೀಗೆ ವೈದಿಕ ಕರ್ಮಗಳ ಮೊರೆ ಹೊಕ್ಕು, ಬಯಕೆಗಳ ಬೆನ್ನುಹತ್ತಿ ಅತ್ತಿಂದಿತ್ತ ಅಲೆದಾಡುತ್ತಿರುತ್ತಾರೆ.

ಸ್ವರ್ಗದ ಬಯಕೆಯಿಂದ ಪುಣ್ಯಕರ್ಮ ಮಾಡುವ ತ್ರೈವಿದ್ಯರು ಸ್ವರ್ಗವನ್ನು ಸೇರಿ ಅಲ್ಲಿ ಬಗೆ ಬಗೆಯ ಭೋಗವನ್ನು ಅನುಭವಿಸಿ ತಮ್ಮ ಸತ್ಕರ್ಮದ ಫಲ ಮುಗಿದ ತಕ್ಷಣ ಪುನಃ ಭೂಲೋಕದಲ್ಲಿ ಹುಟ್ಟುತ್ತಾರೆ. ಈ ಕಾರಣದಿಂದ ಇವರು ಅತ್ಯಂತ ಹಿರಿದಾದ ಮೋಕ್ಷದಿಂದ ಮತ್ತು ಭಗವಂತನಿಂದ  ವಂಚಿತರಾಗುತ್ತಾರೆ. ಇವರು ಸದಾ ಬಯಕೆಗಳ ಬೆನ್ನು ಹತ್ತಿ  ಚಕ್ರಭ್ರಮಣದಲ್ಲಿ ಸಿಲುಕಿ ಕೊಳ್ಳುತ್ತಾರೆ. ಇವರಿಗಿಂತ ತೀರ ಭಿನ್ನ ನಡೆ ಭಾಗವತರದ್ದು:

ಅನನ್ಯಾಶ್ಚಿಂತಯಂತೋ ಮಾಂ ಯೇ ಜನಾಃ ಪರ್ಯುಪಾಸತೇ ।
ತೇಷಾಂ ನಿತ್ಯಾಭಿಯುಕ್ತಾನಾಂ ಯೋಗಕ್ಷೇಮಂ ವಹಾಮ್ಯಹಮ್ ॥೨೨॥

ಅನನ್ಯಾಃ ಚಿಂತಯಂತಃ ಮಾಮ್  ಯೇ ಜನಾಃ ಪರ್ಯುಪಾಸತೇ ।
ತೇಷಾಮ್ ನಿತ್ಯ ಅಭಿಯುಕ್ತಾನಾಮ್ ಯೋಗ ಕ್ಷೇಮಮ್ ವಹಾಮಿ ಅಹಮ್- ಬೇರೆಲ್ಲಾ ತೊರೆದು ನನ್ನನ್ನೇ ನೆನೆಯುತ್ತಾ ಪರಿಪರಿಯಿಂದ ಪೂಜಿಸುವ ಜನರು ಎಲ್ಲೆಲ್ಲೂ ನನ್ನ ಸೇವೆಗೆ ಮುಡಿಪಾದವರು. ಅವರ ಯೋಗ-ಕ್ಷೇಮದ ಹೊಣೆ ನನ್ನದು.

ಭಾಗವತರು ಯಾವುದನ್ನೂ ಬೇಕು ಎಂದು ಬಯಸುವುದಿಲ್ಲ. ಅವರಿಗೆ ಭಗವಂತನ ಚಿಂತನೆಯೊಂದನ್ನು ಬಿಟ್ಟರೆ ಬೇರೆ ಚಿಂತನೆಯೇ ಇಲ್ಲ. ಇವರು ಅನನ್ಯವಾಗಿ ಭಗವಂತನನ್ನು ಮಾತ್ರ ಬಯಸುತ್ತಾರೆ. ಯಾವುದೋ ಬಯಕೆಗೆ ಕಟ್ಟು ಬಿದ್ದು ಅವರು ಪೂಜೆ ಮಾಡುವುದಿಲ್ಲ. ಇವರು ಭಗವಂತನಲ್ಲದೆ ಇನ್ಯಾವುದೇ ದೇವತೆಯನ್ನು ಪ್ರಧಾನವಾಗಿಟ್ಟುಕೊಂಡು ಆಹುತಿ ಕೊಟ್ಟು ಆರಾಧನೆ ಮಾಡುವುದಿಲ್ಲ. ಎಲ್ಲಾ ದೇವತೆಯ ಒಳಗೂ ಇವರು ಕೇವಲ ಭಗವಂತನನ್ನು ಕಾಣುತ್ತಾರೆ. ಇದು ಏಕಭಕ್ತಿ; ಪರಮಾತ್ಮನನ್ನು, ಮೋಕ್ಷವನ್ನು ಸೇರಲು ಅನುಸರಿಸಬೇಕಾದ ಮಾರ್ಗ.

ನಾವು ಪೂಜೆ ಮಾಡಿಸಿದಾಗ ಸಂಕಲ್ಪ ಮಾಡುತ್ತೇವೆ. ಇಲ್ಲಿ ನಾವು ಎಂದೂ ನಮ್ಮ ಐಹಿಕ ಬಯಕೆಗಳನ್ನು ಭಗವಂತನ ಮುಂದಿಡಬಾರದು. ಕೇವಲ ಜ್ಞಾನ, ಭಕ್ತಿ, ಮೋಕ್ಷ- ಇದು ನಮ್ಮ ಸಂಕಲ್ಪವಾಗಿರಬೇಕು. ನಶ್ವರವಾದ ಬಯಕೆಗಳನ್ನು ಮುಂದಿಟ್ಟು ಪೂಜೆ ಮಾಡಿಸಿದಾಗ ನಾವು ಮಹತ್ತಾದ ಫಲವನ್ನು ಕಳೆದುಕೊಳ್ಳುತ್ತೇವೆ. ನಮಗೆ ಏನು ಬೇಕು ಏನು ಬೇಡ ಎನ್ನುವುದು  ಆ ಭಗವಂತನಿಗೆ ನಮಗಿಂತ ಚೆನ್ನಾಗಿ ಗೊತ್ತು ಮತ್ತು ಆತ ಎಂದೂ ನಮ್ಮನ್ನು ಬಿಟ್ಟು ಹಾಕುವುದಿಲ್ಲ. ಪೂಜೆ ಕೇವಲ ಭಗವಂತನ ಪ್ರೀತ್ಯರ್ಥವಾಗಿ ಮಾಡಿ ಆತನಲ್ಲಿ ಅನನ್ಯ ಭಕ್ತಿ ನೆಟ್ಟಾಗ ಭಗವಂತ ನಮ್ಮನ್ನು ಪ್ರೀತಿಸುತ್ತಾನೆ. ಕೃಷ್ಣ ಹೇಳುತ್ತಾನೆ "ತೇಷಾಂ ನಿತ್ಯಾಭಿಯುಕ್ತಾನಾಂ ಯೋಗಕ್ಷೇಮಂ ವಹಾಮ್ಯಹಮ್" -ಇಂತಹ ಭಕ್ತರ ಯೋಗಕ್ಷೇಮದ ಹೊಣೆ ನನ್ನದು ಎಂದು. ಇದಕ್ಕಿಂತ ಹೆಚ್ಚಿನ ಭರವಸೆ ಏನು ಬೇಕು?

ನಾವು ಗಾಢವಾಗಿ "ಭಗವಂತ ನಮ್ಮನ್ನು ರಕ್ಷಿಸಿಯೇ ರಕ್ಷಿಸುತ್ತಾನೆ" ಎಂದು ಗಟ್ಟಿಯಾಗಿ ನಂಬಿದರೆ ಆತ ರಕ್ಷಿಸಿಯೇ ರಕ್ಷಿಸುತ್ತಾನೆ. ಭಗವಂತನ ಮೇಲಿನ ನಮ್ಮ  ನಂಬಿಕೆಯಲ್ಲಿ ನಾವು ಎಂದೂ ವಿಚಲಿತರಾಗಬಾರದು.

ಅದು ದೃಢವಾಗಿರಬೇಕು. ಗುರಿ ಕೇವಲ ಭಗವಂತನನ್ನು ಸೇರುವತ್ತ ಇರಬೇಕು. ಭಗವಂತ ಏನು ಕೊಟ್ಟನೋ ಅದೇ ಮಹಾ ಪ್ರಸಾದವೆಂದು ಸ್ವೀಕರಿಸಿ ಸಂಪೂರ್ಣ ಆತನಲ್ಲಿ ಶರಣಾಗಬೇಕು. ಇಂತಹ ಸ್ಥಿತಿಯಲ್ಲಿ ನಮಗೆ ಎಂದೂ ದುಃಖವಾಗುವುದಿಲ್ಲ. ಬದುಕು ಆನಂದಮಯವಾಗಿರುತ್ತದೆ. ಜೀವನದಲ್ಲಿ ಏನೇ ಘಟನೆ ನಡೆದರೂ "ಭಗವಂತನ ಚಿತ್ತದಂತೆ ಆಯಿತು" ಎಂದು ತಿಳಿದು ಅದನ್ನು ಸಂತೋಷದಿಂದ ಸ್ವೀಕರಿಸುವ ಮನೋವೃತ್ತಿ ನಮ್ಮದಾಗಬೇಕು. ಇದು ಮೋಕ್ಷದ ಹೆಬ್ಬಾಗಿಲು.

ಯೇಽಪ್ಯನ್ಯದೇವತಾ ಭಕ್ತಾ ಯಜಂತೇ ಶ್ರದ್ಧಯಾಽನ್ವಿತಾಃ ।
ತೇಽಪಿ ಮಾಮೇವ ಕೌಂತೇಯ ಯಜಂತ್ಯವಿಧಿಪೂರ್ವಕಮ್ ॥೨೩॥

ಯೇ ಅಪಿ ಅನ್ಯ ದೇವತಾ ಭಕ್ತಾಃ ಯಜಂತೇ ಶ್ರದ್ಧಯಾ ಅನ್ವಿತಾಃ ।
ತೇ ಅಪಿ ಮಾಮ್ ಏವ ಕೌಂತೇಯ ಯಜಂತಿ ಅವಿಧಿ ಪೂರ್ವಕಮ್ -- ಕೌಂತೇಯಾ, ಯಾರು ಬೇರೆ ದೇವತೆಗಳ ಭಕ್ತರಾಗಿ ಶ್ರದ್ಧೆಯಿಂದ ಅವರನ್ನು ಆರಾಧಿಸುತ್ತಾರೋ ಅಂತವರು ಕೂಡಾ ತಪ್ಪುದಾರಿಯಿಂದ ನನ್ನನ್ನೇ ಆರಾಧಿಸುತ್ತಾರೆ.

ಅಹಂ ಹಿ ಸರ್ವಯಜ್ಞಾನಾಂ ಭೋಕ್ತಾ ಚ ಪ್ರಭುರೇವ ಚ ।
ನತು ಮಾಮಭಿಜಾನಂತಿ ತತ್ತ್ವೇನಾತಶ್ಚ್ಯವಂತಿ ತೇ ॥೨೪॥

ಅಹಮ್ ಹಿ ಸರ್ವಯಜ್ಞಾನಾಮ್ ಭೋಕ್ತಾ ಚ ಪ್ರಭುಃ ಏವ ಚ ।
ನ ತು ಮಾಮ್ ಅಭಿಜಾನಂತಿ ತತ್ತ್ವೇನ ಅತಃ ಚ್ಯವಂತಿ ತೇ -- ನಾನೇ ಅಲ್ಲವೇ ಎಲ್ಲಾ ಪೂಜೆಗಳನ್ನು ಕೊಳ್ಳುವವನು ಮತ್ತು ನಡೆಸುವವನು. ನಿಜವಾಗಿ ಅವರು ನನ್ನನ್ನು ಚೆನ್ನಾಗಿ ತಿಳಿದಿಲ್ಲ. ಆದ್ದರಿಂದ ಜಾರಿ ಬೀಳುತ್ತಾರೆ.

ಹಿಂದೆ ವಿಶ್ಲೇಶಿಸಿದಂತೆ ಕೆಲವರು ತಮ್ಮ ಬಯಕೆಗಳನ್ನು ಈಡೇರಿಸುವಂತೆ ಕೋರಿ ದೇವತೆಗಳನ್ನು ಪ್ರಮುಖವಾಗಿ (ಭಗವಂತನಿಗಿಂತ ಬಿನ್ನವಾಗಿ) ಪೂಜಿಸುತ್ತಾರೆ. ಹೀಗೆ ಮಾಡಿದಾಗ ಏನಾಗುತ್ತದೆ ಎನ್ನುವ ಪ್ರಶ್ನೆ ನಮಗೆ ಮೂಡಬಹುದು. ಹಿಂದೆ ಕೃಷ್ಣ ಹೇಳಿದ್ದ "ಎಲ್ಲವುದರಲ್ಲೂ ಇರುವವನು ನಾನು" ಎಂದು. ಯಾರನ್ನು ಪ್ರಮುಖವಾಗಿ ಪೂಜಿಸಿದರೂ ಕೂಡಾ ಅದು ಸಲ್ಲುವುದು ಭಗವಂತನನ್ನೇ. ಇಲ್ಲಿ ಸಮಸ್ಯೆ ಎಂದರೆ ಪೂಜೆ ಮಾಡುವವರಿಗೆ ಆ ಅರಿವು ಇಲ್ಲದಿರುವುದು. ಇದರಿಂದ ತಪ್ಪು ಅನುಸಂಧಾನ. ಅರಿವಿಲ್ಲದೇ ಮಾಡುವ ಭಕ್ತಿ ಪೂರ್ಣ ಭಕ್ತಿಯಾಗಲಾರದು. ಪರತತ್ವದ ಎಚ್ಚರ ಇಲ್ಲದೇ ಮಾಡುವ ಪೂಜೆ ಎಂದೂ ನಮ್ಮನ್ನು ಉನ್ನತಿಗೇರಿಸಲಾರದು. ಕೃಷ್ಣ ಹೇಳುತ್ತಾನೆ "ಈ ರೀತಿಯ ಪೂಜೆಯಿಂದ ಪುಣ್ಯ ಗಳಿಸುವ ಬದಲು, ಪುಣ್ಯ ಕರ್ಮ ಮಾಡಿಯೂ ಜಾರಿ ಬಿದ್ದಂತೆ" ಎಂದು. ಆದ್ದರಿಂದ ಯಾವ ಪೂಜೆಯನ್ನೇ ಆಗಲಿ ಪರತತ್ವದ ಎಚ್ಚರದಿಂದ ಮಾಡಿದಾಗ ಮಾತ್ರ ಅದು ಸಾರ್ಥಕ. ಯಾರನ್ನೇ ಪೂಜಿಸಿದರೂ ಆ ಪೂಜೆ ಅಂತತಃ ಸಲ್ಲುವುದು

ಭಗವಂತನನ್ನೇ. ಏಕೆಂದರೆ ಸರ್ವ ಯಜ್ಞಗಳ ಭೋಕ್ತಾರ ಭಗವಂತ. ಇದು ಯಜ್ಞದ ಹಿಂದಿರುವ ಯಜ್ಞಪುರುಷನ ರಹಸ್ಯ. ಪುರುಷಸೂಕ್ತದಲ್ಲಿ ಹೇಳುವಂತೆ "ಯಜ್ಞೇನ ಯಜ್ಞ ಮಯಜಂತ ದೇವಾಃ"-ಯಜ್ಞದಿಂದ ಯಜ್ಞ ನಾಮಕ ಭಗವಂತನ ಆರಾಧನೆ. ಯಜ್ಞಗಳ ಭೋಕ್ತ, ಯಜ್ಞಗಳ ಸ್ವಾಮಿ, ಯಜ್ಞ ಶಬ್ದವಾಚ್ಯನಾದ ಭಗವಂತನ ಆರಾಧನೆಯಿಂದ ನಾವು ಭಗವಂತನನ್ನು ಸೇರಬಹುದು.

ಹೀಗಿದ್ದರೂ ಕೂಡಾ ಸಮಾಜದಲ್ಲಿ ನಾವು ಅನೇಕ ರೀತಿಯಲ್ಲಿ ದೇವತಾ ಆರಾಧನೆ ಮಾಡುವವರನ್ನು ನೋಡುತ್ತೇವೆ. ಅಂತವರು ಆ ದೇವತೆಯನ್ನು ಪೂಜಿಸುವುದರಲ್ಲೇ ಶ್ರದ್ಧೆ ಇಟ್ಟಿರುತ್ತಾರೆ. ಆ ರೀತಿ ಪೂಜೆ ಮಾಡುವವರ ಗತಿ ಏನು? ಇದಕ್ಕೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರಿಸುತ್ತಾನೆ.

ಯಾಂತಿ ದೇವವ್ರತಾ ದೇವಾನ್ ಪಿತ ನ್ ಯಾಂತಿ ಪಿತೃವ್ರತಾಃ ।
ಭೂತಾನಿ ಯಾಂತಿ ಭೂತೇಜ್ಯಾ ಯಾಂತಿ ಮದ್ಯಾಜಿನೋಽಪಿ ಮಾಮ್ ॥೨೫॥

ಯಾಂತಿ ದೇವವ್ರತಾಃ ದೇವಾನ್ ಪಿತೃನ್ ಯಾಂತಿ ಪಿತೃವ್ರತಾಃ ।
ಭೂತಾನಿ ಯಾಂತಿ ಭೂತೇಜ್ಯಾಃ ಯಾಂತಿ ಮತ್ ಯಾಜಿನಃ ಅಪಿ ಮಾಮ್-ದೇವತೆಗಳ ನೇಮ ಹಿಡಿದವರು ದೇವತೆಗಳನ್ನು ಸೇರುತ್ತಾರೆ. ಪಿತೃಗಳ ನೇಮ ಹಿಡಿದವರು ಪಿತೃಗಳನ್ನು ಸೇರುತ್ತಾರೆ. ದೆವ್ವಗಳನ್ನು ಪೂಜಿಸುವವರು ದೆವ್ವಗಳನ್ನು ಸೇರುತ್ತಾರೆ. ನನ್ನನ್ನು ಪೂಜಿಸುವವರು ನನ್ನನ್ನೇ ಸೇರುತ್ತಾರೆ.

ಕೃಷ್ಣ ಹೇಳುತ್ತಾನೆ "ನೀವು ಯಾರನ್ನು ಪೂಜಿಸುತ್ತೀರೋ ಅವರನ್ನೇ ಪಡೆಯುತ್ತೀರಿ" ಎಂದು. ದೇವತೆಗಳನ್ನು ಪೂಜಿಸುವವರು ದೇವತೆಗಳನ್ನೂ, ಪಿತೃಗಳನ್ನು ಪೂಜಿಸುವವರು ಪಿತೃಗಳನ್ನೂ, ಭೂತ ಪ್ರೇತವನ್ನು(ದೇವತಾ ಗಣ) ಪೂಜಿಸುವವರು ಭೂತ ಪ್ರೇತಗಳನ್ನೂ ಪಡೆಯುತ್ತಾರೆ. ಆದರೆ ಯಾರು ಏಕಭಕ್ತಿಯಿಂದ ಎಲ್ಲವುದರಲ್ಲೂ ಭಗವಂತನನ್ನು ಕಂಡು ಶ್ರದ್ಧೆಯಿಂದ ಆತನನ್ನು ಪೂಜಿಸುತ್ತಾರೋ- "ಅವರು ನನ್ನನ್ನು ಸೇರುತ್ತಾರೆ"- ಎನ್ನುವ ಭರವಸೆಯನ್ನು ಇಲ್ಲಿ ಕೃಷ್ಣ ಕೊಡುತ್ತಾನೆ. ದೇವತೆಗಳನ್ನು ಪೂಜಿಸಿ ಸ್ವರ್ಗವನ್ನು ಪಡೆಯಬಹುದು, ಆದರೆ ಮರಳಿ ಹುಟ್ಟದ ಮೋಕ್ಷವನ್ನಲ್ಲ. ಯಾವ ಪೂಜೆ ಮಾಡಿದರೂ ಸರಿಯೇ, ಪ್ರತಿಯೊಂದು ಕ್ರಿಯೆಯ ಹಿಂದೆ ಭಗವಂತನ ಅರಿವಿದ್ದು ಅದರಿಂದ ಅವನನ್ನು ಆರಾಧಿಸುವುದೇ ನಿಜವಾದ ಪೂಜೆ. ಅರಿವಿಲ್ಲದ ಪೂಜೆ ಎಂದೂ ನಮ್ಮನ್ನು ಮೋಕ್ಷದತ್ತ ಕೊಂಡೊಯ್ಯುವುದಿಲ್ಲ. ಬ್ರಹ್ಮಾದಿ ಸಮಸ್ತ ದೇವತಾ ಪರಿವಾರ ಸಮೇತನಾಗಿರತಕ್ಕಂತಹ ಭಗವಂತನ ಆರಾಧನೆ ಮಾಡಿದರೆ ಆಗ ಭಗವಂತನನ್ನು ಸೇರುತ್ತಾರೆ. ಇದು ಶಾಸ್ತ್ರದ ವ್ಯವಸ್ಥೆ.

ಮುಂದಿನ ಶ್ಲೋಕಕ್ಕೆ ಹೋಗುವ ಮುನ್ನ ಇಲ್ಲಿ ನಾವು ಒಂದು ವಿಚಾರವನ್ನು ಸ್ಪಷ್ಟವಾಗಿ ತಿಳಿಯಬೇಕು. ನಾವು ನಮ್ಮ ದೈನಂದಿನ ಜೀವನದಲ್ಲಿ ಗಣಹೋಮ, ನವಗ್ರಹಹೋಮ, ದೈವಾರಾಧನೆ, ಸಂಕಷ್ಟಿ, ಇತ್ಯಾದಿ ರೂಪದಲ್ಲಿ ಉಪಾಸನೆ ಮಾಡುತ್ತೇವೆ. ಇದು ತಪ್ಪೇ? ನಾವು ಗಣಪತಿ ಅಥವಾ ಇನ್ಯಾವುದೋ ಪ್ರತೀಕದಲ್ಲಿ ಭಗವಂತನ ಆರಾಧನೆ ಮಾಡಿದರೆ ನಮಗೆ ಮೋಕ್ಷ ಪ್ರಾಪ್ತಿ ಇಲ್ಲವೇ? ಯಾವುದು ಸರಿ, ಯಾವುದು ತಪ್ಪು? ಯಾವುದು ತ್ರೈವಿಧ್ಯಧರ್ಮ, ಯಾವುದು ಭಾಗವತ ಧರ್ಮ ?

ನಮ್ಮಲ್ಲಿ ಇಂದು ಭಾಗವತ ಧರ್ಮ ಕಣ್ಮರೆಯಾಗುತ್ತಿದೆ. ಯಾವುದೇ ಪ್ರತೀಕದ ಅಂತರ್ಯಾಮಿ ಭಗವಂತನ ಪೂಜೆ ತಪ್ಪಲ್ಲ. ಆದರೆ ಅದರ ಹಿಂದಿರುವ ನಮ್ಮ ಸಂಕಲ್ಪ ತಪ್ಪು. ಉದಾಹರಣೆಗೆ ನವಗ್ರಹ ಹೋಮ. ಒಂದು ವೇಳೆ ನಾವು ಯಾವ ಫಲ ಕಾಮನೆಯೂ ಇಲ್ಲದೆ, ಕೇವಲ ಮೋಕ್ಷ ಪ್ರಾಪ್ತಿಗಾಗಿ, ಸಕಲ ದೇವತಾಪರಿವಾರನಾದ, ನವಗ್ರಹ ಅಂತರ್ಗತ ನಾರಾಯಣ ಪ್ರೀತ್ಯರ್ಥ ನವಗ್ರಹ ಹೋಮ ಮಾಡಿದರೆ ಏನೂ ತಪ್ಪಿಲ್ಲ. ಆದರೆ ಅಲ್ಲಿ ನಾವು 'ನವಗ್ರಹ ಅಂತರ್ಗತ ನಾರಾಯಣ ಪ್ರಸನ್ನನಾಗಿ ಆ ಮೂಲಕ ನವಗ್ರಹ ದೋಷ ಪರಿಹಾರ ಮಾಡಲಿ' ಎಂದು ಸಂಕಲ್ಪ ಮಾಡಿದಾಗ ಅದು ತ್ರೈವಿಧ್ಯ ಧರ್ಮವಾಗುತ್ತದೆ. ಸಂಕಲ್ಪ ಮಾಡುವಾಗ ಯಾವುದೇ ಕಾಮನೆ ಸೇರಿಸದೆ ಕೇವಲ ಭಗವದ್ ಪ್ರೀತ್ಯರ್ಥ ಎಂದು ಯಾವ ಕಾಮ್ಯ ಕರ್ಮ ಮಾಡಿದರೂ ಅದು ಭಾಗವತ ಧರ್ಮ. ಭಗವಂತ ಸುಪ್ರೀತನಾದರೆ ಎಲ್ಲವೂ ಸಿದ್ಧಿಸಿದಂತೆ. ಅವನು ಕೊಟ್ಟದ್ದನ್ನು ಸಂತೋಷವಾಗಿ ಭೋಗಿಸು, ಕೊಡದಿದ್ದುದನ್ನು ಬಯಸಬೇಡ. ನಿನಗೆ ಬಂದ ಕಷ್ಟ ನಿವಾರಣೆ ಮಾಡು ಎಂದು ಭಗವಂತನನ್ನು ಪೂಜಿಸಬೇಡ, ಬದಲಿಗೆ ಬಂದದ್ದನ್ನು ಪ್ರಸಾದವಾಗಿ ಸ್ವೀಕರಿಸು ಮತ್ತು ಜ್ಞಾನ ವೈರಾಗ್ಯ ಭಕ್ತಿ-ಮೋಕ್ಷ ಕೊಡು ಎಂದು ನಿರಂತರ ಭಗವಂತನನ್ನು ಪ್ರಾರ್ಥಿಸು. ನಿನ್ನ ರಕ್ಷಣೆಯ ಭಾರ ಆ ಭಗವಂತನದ್ದು. ಅದಕ್ಕಾಗಿ ನೀನು ತಲೆ ಕೆಡಿಸಿಕೊಳ್ಳಬೇಡ. ನಿನ್ನ ಜೀವನದಲ್ಲಿ ಏನು ನಡೆಯುತ್ತಿದೆ ಅದು ಆಕಸ್ಮಿಕವಲ್ಲ. ಅದು ಭಗವಂತನ ಇಚ್ಛೆ, ಅದರ ನಿವಾರಣೆಗಾಗಿ ನೀನು ಭಗವಂತನನ್ನು ಪೂಜಿಸುವುದಲ್ಲ ಬದಲಿಗೆ ಭಗವಂತನನ್ನು ಸೇರಲು ಭಗವಂತನನ್ನು ಪೂಜಿಸುವುದು. ಈ ರೀತಿ ನಾವು ನಮ್ಮ ಸಂಕಲ್ಪದ ಹಿಂದಿನ ಅನುಸಂಧಾನವನ್ನು ಬದಲಿಸಿಕೊಂಡಾಗ ಅದು ಭಾಗವತ ಧರ್ಮವಾಗುತ್ತದೆ. ಒಬ್ಬ ತ್ರೈವಿಧ್ಯ ತನ್ನ ಗುರುವಿಗೆ 'ನನ್ನ ಗುರು' ಎಂದು ನಮಸ್ಕಾರ ಮಾಡಿದರೆ ಭಾಗವತ 'ಆ ಗುರುಗಳ ಒಳಗೆ ಭಗವಂತ ಕೂತು ನನಗೆ ಪಾಠ ಹೇಳುತ್ತಿದ್ದಾನೆ' ಎಂದು ತಿಳಿದು ನಮಸ್ಕಾರ ಮಾಡುತ್ತಾನೆ. ಭಾಗವತ ತನ್ನೆಲ್ಲಾ ಕ್ರಿಯೆಯಲ್ಲಿ ಭಗವಂತನನ್ನು ಕಾಣುತ್ತಾನೆ. ಆತ ತನ್ನೆಲ್ಲಾ ಕ್ರಿಯಾ ಕರ್ಮದಲ್ಲಿ ಮೋಕ್ಷ ಮತ್ತು ಭಗವಂತನನ್ನು ಬಿಟ್ಟು ಇನ್ನೇನನ್ನೂ ಬಯಸುವುದಿಲ್ಲ. ಆತನ ಪೂಜಾ ಸಂಕಲ್ಪದಲ್ಲಿ ಮೋಕ್ಷದ ಬಯಕೆಯನ್ನು ಬಿಟ್ಟು ಇನ್ಯಾವುದೇ ಬಯಕೆ ಇರುವುದಿಲ್ಲ. ನಾವು ಈ ಎತ್ತರಕ್ಕೇರುವುದು ಅಸಾಧ್ಯವಲ್ಲ. ಇದನ್ನು ಸಾಧ್ಯ ಮಾಡಲು ಪ್ರಯತ್ನ ಬೇಕು ಅಷ್ಟೇ. ನಾವು ಎಷ್ಟುಎಷ್ಟು ಭಗವದ್ ಪ್ರೀತ್ಯರ್ಥ ಕರ್ಮ ಮಾಡುತ್ತೇವೋ ಅಷ್ಟುಅಷ್ಟು ಹೆಚ್ಚು ಮೋಕ್ಷಕ್ಕೆ ಹತ್ತಿರವಾಗುತ್ತೇವೆ. ಭಗವಂತನಲ್ಲಿ 'ನನಗೆ ಇದನ್ನು ಕೊಡು' ಎಂದಾಗಾಲೀ ಅಥವಾ 'ಇದನ್ನು ನಿವಾರಿಸು' ಎಂದಾಗಲಿ ಎಂದೂ ಕೇಳಬೇಡ. ನಿನಗೆ ಏನು ಬೇಕು ಎನ್ನುವುದು ಭಗವಂತನಿಗೆ ಗೊತ್ತಿದೆ, ಅದನ್ನು ಭಗವಂತನಿಗೆ ಬಿಡು. ಕೇವಲ ಭಗವದ್ ಪ್ರೀತಿಗಾಗಿ, ಮೋಕ್ಷ ಸಾಧನೆಗಾಗಿ ಕರ್ಮ ಮಾಡು". "ಇದು ಕೇವಲ ಭೀಮಸೇನ/ವಾಯುದೇವರಿಗೆ ಮಾತ್ರ" ಎಂದು ಪಲಾಯನ ವಾದ ಮಾಡದೇ, ಯಾವುದೇ ಫಲ ಕಾಮನೆ ಇಲ್ಲದೇ ಪೂರ್ಣ ಭಕ್ತಿಯಿಂದ ಭಗವಂತನ ಪೂಜೆ ಮಾಡು. ಪೂಜೆಯಲ್ಲಿ ನಿನಗೆ ಬೇಡಲು ಇರುವ ಅಧಿಕಾರ ಕೇವಲ 'ಮೋಕ್ಷ ಮತ್ತು ಭಗವಂತ'. ಅದನ್ನು ಪಡೆಯಲು ನಿನ್ನ ಸಾಧನೆಯನ್ನು ಮೀಸಲಿಡು. ಜೀವನದಲ್ಲಿ ಬರುವ ಏಳು ಬೀಳು ಎಲ್ಲವೂ ನಶ್ವರ, ಆ ಬಗ್ಗೆ ಯೋಚಿಸದೇ, ಸಂಸಾರದಿಂದ ಕಳಚಿಕೊಂಡು ಸಾವಿಲ್ಲದ ಮೋಕ್ಷವನ್ನು ಸೇರುವುದಕ್ಕಾಗಿ ಸಾಧನೆ ಮಾಡು. ಇದು ಇಲ್ಲಿರುವ ಮೂಲ ಸಂದೇಶ.

ಭಗವಂತನ ಪೂಜೆಗೆ ಬೇಕಾಗಿರುವುದು ಧನ-ಕನಕವಲ್ಲ. ಕೇವಲ ನಿಷ್ಕಾಮ ಭಕ್ತಿ. ಭಗವಂತನ ಪೂಜೆ ಎಷ್ಟು ಸುಲಭ ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ:

ಪತ್ರಂ ಪುಷ್ಪಂ ಫಲಂ ತೋಯಂ ಯೋ ಮೇ ಭಕ್ತ್ಯಾ ಪ್ರಯಚ್ಛತಿ ।
ತದಹಂ ಭಕ್ತ್ಯುಪಹೃತಮಶ್ನಾಮಿ ಪ್ರಯತಾತ್ಮನಃ ॥೨೬॥

ಪತ್ರಮ್ ಪುಷ್ಪಮ್ ಫಲಮ್ ತೋಯಮ್ ಯಃ ಮೇ ಭಕ್ತ್ಯಾ ಪ್ರಯಚ್ಛತಿ ।
ತತ್ ಅಹಮ್ ಭಕ್ತಿ ಉಪಹೃತಮ್ ಅಶ್ನಾಮಿ ಪ್ರಯತ ಆತ್ಮನಃ -ಯಾರು ಎಲೆಯನ್ನೋ, ಹೂವನ್ನೋ, ನೀರನ್ನೋ ಭಕ್ತಿಯಿಂದ ನನಗೆ ನೀಡುತ್ತಾನೋ, ನನ್ನಲ್ಲೇ ಬಗೆಯಿಟ್ಟ ಅವನ ಭಕ್ತಿಯ ಆ ಕೊಡುಗೆಯನ್ನು ನಾನು ನಲ್ಮೆಯಿಂದ ಕೊಳ್ಳುತ್ತೇನೆ.

ಮಹೋನ್ನತನಾದ ಭಗವಂತನ ಪೂಜೆಗೆ ಮೂಲವಾಗಿ ಬೇಕಾಗಿರುವುದು 'ತನ್ನನ್ನು ತಾನು ಸಂಪೂರ್ಣ ತೊಡಗಿಸಿಕೊಳ್ಳುವುದು(involvement)', ಮತ್ತು 'ಮನಸ್ಸು ತುಂಬಿ ಆರಾಧನೆ' ಮಾಡುವುದು. ಮನಸ್ಸಿನಲ್ಲಿ ಭಕ್ತಿ ತುಂಬಿ ತುಳಸಿ ಪತ್ರೆಯನ್ನೋ, ಹೂವನ್ನೋ ಅರ್ಪಿಸಿದರೆ ಅದನ್ನು ಭಗವಂತ ಪ್ರೀತಿಯಿಂದ ಸ್ವೀಕರಿಸುತ್ತಾನೆ. ಇಲ್ಲಿ ಬಂಗಾರದ ಪೀಠವಾಗಲೀ, ಬೆಳ್ಳಿಯ ಹರಿವಾಣವಾಗಲೀ, ಪಂಚಪಾತ್ರೆಯಾಗಲಿ ಏನೂ ಬೇಡ. ಮನೆಯಲ್ಲಿ, ಮನೆ ತೋಟದಲ್ಲಿ ಏನಿದೆ ಅದನ್ನೇ ಅರ್ಪಿಸು. ಮನೆಯಲ್ಲಿ ಹಾಲಿಲ್ಲದಿದ್ದರೆ ಒಂದು ಲೋಟ ನೀರನ್ನು ಭಕ್ತಿಯಿಂದ ಅರ್ಪಿಸು. ಆದರೆ ಅದರ ಹಿಂದೆ ಭಾವಶುದ್ಧಿ ಇರಲಿ ಅಷ್ಟೇ. ಕೃಷ್ಣ ಹೇಳುತ್ತಾನೆ "ಯೋ ಮೇ ಭಕ್ತ್ಯಾ ಪ್ರಯಚ್ಛತಿ" ಎಂದು. ಭಗವಂತ ಬಯಸುವುದು ನಮ್ಮ ಅಂತರಂಗದ ಪ್ರೀತಿಯನ್ನು ಮತ್ತು ಹೃದಯವಂತಿಕೆಯನ್ನು ಹೊರತು ಹೊರಗಿನ ವೈಭವವನ್ನಲ್ಲ. "ತದಹಂ ಭಕ್ತ್ಯುಪಹೃತಮಶ್ನಾಮಿ ಪ್ರಯತಾತ್ಮನಃ"-"ನೀನು ಮನಸ್ಸನ್ನು ನನ್ನಲ್ಲಿ ನೆಲೆಗೊಳಿಸಿ, ಭಕ್ತಿಯಿಂದ ಏನು ಕೊಟ್ಟರೂ ಅದನ್ನು ನಾನು ಸ್ವೀಕರಿಸುತ್ತೇನೆ" ಎನ್ನುತ್ತಾನೆ ಕೃಷ್ಣ. ರಾಮಾಯಣದಲ್ಲಿ ಬರುವ ಶಬರಿಯ ಕಥೆ ಭಗವಂತನ ಈ ನುಡಿಗೆ ಒಂದು ದೃಷ್ಟಾಂತ.

ಯತ್ ಕರೋಷಿ ಯದಶ್ನಾಸಿ ಯಜ್ಜುಹೋಷಿ ದದಾಸಿ ಯತ್ ।
ಯತ್ತಪಸ್ಯಸಿ ಕೌಂತೇಯ ತತ್ ಕುರುಷ್ವ ಮದರ್ಪಣಮ್ ॥೨೭॥

ಯತ್ ಕರೋಷಿ ಯತ್ ಅಶ್ನಾಸಿ ಯತ್ ಜುಹೋಷಿ ದದಾಸಿ ಯತ್ ।
ಯತ್ ತಪಸ್ಯಸಿ ಕೌಂತೇಯ ತತ್ ಕುರುಷ್ವ ಮತ್ ಅರ್ಪಣಮ್ -- ಕೌಂತೇಯಾ, ಏನು ಮಾಡುವೆ, ಏನು ತಿನ್ನುವೆ, ಏನು ಹೋಮಿಸುವೆ, ಏನು ನೀಡುವೆ, ಏನು ತಪಗೈವೆ ಅದನ್ನು ನನಗೆ ಒಪ್ಪಿಸು.

ಕೃಷ್ಣ ಹೇಳುತ್ತಾನೆ "ನನಗಾಗಿ ನೀನು ಏನನ್ನೂ ಮಾಡುವುದು ಬೇಡ ಆದರೆ ನಿನಗೋಸ್ಕರ ಏನು ಮಾಡುತ್ತೀಯೋ ಅದನ್ನು ನನಗೆ ಅರ್ಪಿಸು" ಎಂದು. ನಮ್ಮ ನಿತ್ಯ ಜೀವನದಲ್ಲಿ ಮಾಡಬೇಕಾದ ಅನೇಕ ಅನಿವಾರ್ಯ ವೃತ್ತಿ ಕಾರ್ಯಗಳಿರುತ್ತವೆ. ಜೀವನ ನಿರ್ವಹಣೆಯ ಕಾಯಕವಿರುತ್ತದೆ. ನಾವು ಅದನ್ನೇ ಭಗವಂತನ ಪೂಜೆ ಎಂದು ತಿಳಿದು ಮಾಡಬೇಕು. ಇದಕ್ಕೆ ಉತ್ತಮ ದೃಷ್ಟಾಂತ ಧರ್ಮವ್ಯಾಧನ ಕಥೆ. ಮಾಂಸ ವಿಕ್ರಯ ಮಾಡಿ ಜೀವನ ಸಾಗಿಸುತ್ತಿದ್ದ ಆತನಲ್ಲಿ ಒಂದು ಸಂಕಲ್ಪ ಇತ್ತು. "ಮಾಂಸ ಮಾರುವುದು ನನಗೆ ಆನುವಂಶೀಯವಾಗಿ

ಬಂದ ಅಭ್ಯಾಸ. ಆದ್ದರಿಂದ ನಾನು ಮಾಂಸ ಮಾರುತ್ತೇನೆ, ನನಗೆ ಬದುಕುವುದಕ್ಕೋಸ್ಕರ ಮತ್ತು ನನ್ನ ತಂದೆತಾಯಿಯನ್ನು ಸಾಕುವುದಕ್ಕೋಸ್ಕರ ನನ್ನ ಪಾಲಿಗೆ ಬಂದ ಈ ವೃತ್ತಿಯನ್ನು ನಾನು ಮಾಡುತ್ತೇನೆ. ಇದರಿಂದ ನನ್ನ ಬದುಕಿಗೆ ಬೇಕಾದಷ್ಟನ್ನು ಮಾತ್ರ ನಾನು ಗಳಿಸುತ್ತೇನೆ. ಎಂದೂ ವ್ಯವಹಾರದಲ್ಲಿ ಜನರ ಶೋಷಣೆ ಮಾಡುವುದಿಲ್ಲ" ಎಂದುಕೊಂಡು ಮಾಂಸ ವಿಕ್ರಯ ಮಾಡುತ್ತಿದ್ದ ಆತ. ಇದರಿಂದ ಆತನಿಗೆ ದೊಡ್ಡ ಜ್ಞಾನಿ ಧರ್ಮವ್ಯಾಧ ಎನ್ನುವ ಹೆಸರು ಬಂತು. ಋಷಿ ಮುನಿಗಳು ಆತನಿಂದ ಪಾಠ ಕಲಿಯುವ ಪ್ರಸಂಗ ಬಂತು. ಇದಕ್ಕೆ ಮೂಲ ಕಾರಣ ಆತ ತಾನು ಏನು ಮಾಡುತ್ತಿದ್ದನೋ ಅದನ್ನು ದೇವರ ಪೂಜೆ ಎಂದು ಮಾಡಿದ್ದು ಅಷ್ಟೇ. ಹೀಗೆ ನಾವು ಮಾಡುವ ವೃತ್ತಿ ಮುಖ್ಯವಾಗುವುದಿಲ್ಲ, ಬದಲಿಗೆ ಅದನ್ನು ಭಗವಂತನ ಪೂಜೆ ಎಂದು ಮಾಡುವ ಅನುಸಂಧಾನ ಮುಖ್ಯವಾಗುತ್ತದೆ.

ನಿನ್ನ ನಿತ್ಯ ಕರ್ತವ್ಯ ಏನಿದೆ ಅದನ್ನು ಭಗವಂತನಿಗೆ ಅರ್ಪಿಸು. ಅದನ್ನು ಭಗವಂತನ ಪೂಜೆ ಎಂದು ಮಾಡು. ಭಗವಂತನಿಗಾಗಿ ಭಕ್ಷ್ಯ ಭೋಜ್ಯವನ್ನು ಮಾಡುವ ಅಗತ್ಯವಿಲ್ಲ. ನೀನು ಏನನ್ನು ತಿನ್ನುತ್ತೀಯೋ ಅದನ್ನು ಭಗವಂತನಿಗೆ ಅರ್ಪಿಸು. ಹೀಗೆ ಮಾಡಿದಾಗ ಭಗವಂತನ ಆರಾಧನೆ ಪ್ರತ್ಯೇಕವಾಗುವುದಿಲ್ಲ ಮತ್ತು ಕಷ್ಟವಾಗುವುದಿಲ್ಲ. ಭಗವಂತನಿಗಾಗಿ ಯಾವುದೋ ವಿಶೇಷ ಹೋಮ ಹವನ ಮಾಡುವ ಅಗತ್ಯವಿಲ್ಲ. ನೀನು ಏನು ಹೋಮ ಮಾಡುತ್ತೀಯೋ ಅದನ್ನೇ 'ಅಗ್ನಿ ಅಂತರ್ಗತ ನಾರಾಯಣಾಯ ಇದಮ್ ನ ಮಮಃ' ಎಂದು ಅರ್ಪಿಸು. ಒಬ್ಬ ಹಸಿದ ವ್ಯಕ್ತಿಯನ್ನು ಕಂಡರೆ ಆತ ತನ್ನ ಹೊಟ್ಟೆಯಲ್ಲಿ ವೈಶ್ವಾನರ ರೂಪಿ ಭಗವಂತನನ್ನು ಹೊತ್ತು ಬಂದಿದ್ದಾನೆ ಎಂದು ತಿಳಿದು ಆತನೊಳಗಿರುವ ವೈಶ್ವಾನರ ಪ್ರಸನ್ನನಾಗಲಿ ಎಂದು ಆ ವ್ಯಕ್ತಿಯನ್ನು ಸತ್ಕಾರ ಮಾಡು. ಇದೇ ಭಗವಂತನ ಮಹಾ ಪೂಜೆ ಎನಿಸುತ್ತದೆ.

ಕೃಷ್ಣ ಹೇಳುತ್ತಾನೆ "ಯತ್ತಪಸ್ಯಸಿ ಕೌಂತೇಯ ತತ್ ಕುರುಷ್ವ ಮದರ್ಪಣಮ್" ಎಂದು. ಇಲ್ಲಿ ತಪಸ್ಸು ಎಂದರೆ 'ಚಿಂತನೆ' ಅಥವಾ ವ್ರತಾನುಷ್ಠಾನ. ಉದಾಹರಣೆಗೆ 'ಸಂಕಷ್ಟಿ'- ಅದನ್ನು ಆಚರಿಸುವಾಗ ಗಣಪತಿ ಅಂತರ್ಗತನಾದ ಭಗವಂತನಿಗೆ ಅರ್ಪಿತವಾಗಲಿ ಎಂದು ಮಾಡು. ಅಲ್ಲಿ ಯಾವುದೇ ಫಲಾಪೇಕ್ಷೆ ಅಹಂಕಾರ ಇಟ್ಟುಕೊಳ್ಳಬೇಡ. ಹೀಗೆ ಯಾವ ಆಚರಣೆಯೂ ಕೂಡಾ ಅಂತತಃ ಪರಮ ಪುರುಷನಾದ ಭಗವಂತನಿಗೆ ಅರ್ಪಿತ ಎಂದು ತಿಳಿದು ಮಾಡಿದಾಗ ಅದು ನಿಜವಾದ ತಪಸ್ಸಾಗುತ್ತದೆ. ಇಲ್ಲಿ ಅರ್ಜುನನಿಗೆ "ನಿನ್ನ ಕರ್ತವ್ಯ ಕರ್ಮವಾಗಿ ಬಂದಿರುವ ಈ ಯುದ್ಧವನ್ನೂ ಕೂಡಾ ಭಗವಂತನ ಪೂಜೆಯಾಗಿ ಮಾಡು" ಎನ್ನುವ ಸಂದೇಶವನ್ನು ಈ ಶ್ಲೋಕದ ಮೂಲಕ ಕೃಷ್ಣ ನೀಡಿದ್ದಾನೆ. ಭಾಗವತ ಧರ್ಮ ಅನುಷ್ಠಾನದಿಂದ ಏನು ಫಲ ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಶುಭಾಶುಭಫಲೈರೇವಂ ಮೋಕ್ಷ್ಯಸೇ ಕರ್ಮಬಂಧನೈಃ ।
ಸಂನ್ಯಾಸಯೋಗಯುಕ್ತಾತ್ಮಾ ವಿಮುಕ್ತೋ ಮಾಮುಪೈಷ್ಯಸಿ ॥೨೮॥

ಶುಭ ಅಶುಭ ಭಲೈಃ ಏವಮ್ ಮೋಕ್ಷ್ಯಸೇ ಕರ್ಮ ಬಂಧನೈಃ ।
ಸಂನ್ಯಾಸ ಯೋಗ ಯುಕ್ತ ಆತ್ಮಾ ವಿಮುಕ್ತಃ ಮಾಮ್ ಉಪೈಷ್ಯಸಿ-ಹೀಗೆ ಬದುಕಿದಾಗ, ಒಳಿತು-ಕೆಡುಕುಗಳ ಕಡೆಗೆಳೆವ ಕರ್ಮದ ಸೆರೆಯಿಂದ ಪಾರಾಗುವೆ. ಫಲದ ಹಂಗು ತೊರೆದು ಕರ್ತವ್ಯದಲ್ಲಿ ಬಗೆ ತೊಡಗಿಸುತ್ತಾ ಸೆರೆ ಕಳಚಿಕೊಂಡು ನನ್ನ ಬಳಿ ಸೇರುವೆ.

ನಾವು ಯಾವುದೇ ಕರ್ಮವನ್ನು 'ನನಗೆ ಇಂತಹ ಫಲ ಬರಬೇಕು' ಎನ್ನುವ ಫಲದ ನಂಟಿನಿಂದ ಮತ್ತು 'ನಾನು ಈ ಕರ್ಮವನ್ನು ಮಾಡಿದೆ' ಎನ್ನುವ ಅಹಮ್ ಇದ್ದು ಮಾಡಿದಾಗ ಆ ಕರ್ಮ ನಮಗೆ ಅಂಟುತ್ತದೆ. ಅದಕ್ಕೋಸ್ಕರ ಹಿಂದಿನ ಕಾಲದಲ್ಲಿ 'ಕರ್ಮಕರಿಷ್ಯೇ' ಎಂದು ಸಂಕಲ್ಪ ಮಾಡುವಾಗ ಈ ರೀತಿ ಹೇಳುತ್ತಿದ್ದರು:

ಭಗವತೋ ಬಲೇನ ಭಗವತೋ ವೀರ್ಯೇನ ಭಗವದಃ ತೇಜಸಾ |
ಭಗವತಾ ಕರ್ಮಣಾ ಕರ್ಮಕರಿಷ್ಯಾಮಿ ಭಗವತೋ ವಾಸುದೇವಸ್ಯಃ ||

"ನಾನು ಮಾಡುವ ಕರ್ಮ ನನ್ನ ಕರ್ಮವಲ್ಲ, ನನ್ನೊಳಗಿರುವ ಭಗವಂತ ಮಾಡುವ ಕರ್ಮ. ಅದರ ಹಿಂದಿರುವ ಶಕ್ತಿ ಸಾಮರ್ಥ್ಯ ಎಲ್ಲವೂ ಭಗವಂತನದ್ದು, ನನ್ನದೇನೂ ಇಲ್ಲ". ಇದು ಭಾಗವತಧರ್ಮದ ಸಂಕಲ್ಪ. ಭಗವದ್ ಪ್ರೀತ್ಯರ್ಥ ಮಾಡಿದ ಯಾವ ಕರ್ಮವೂ ನಮಗೆ ಬಂಧನವಾಗುವುದಿಲ್ಲ. ಬ್ರಹ್ಮಸೂತ್ರದಲ್ಲಿ ವೇದವ್ಯಾಸರು ಇದನ್ನು ಹೀಗೆ ಹೇಳಿದ್ದಾರೆ: "ಭಗವಂತನ ಜ್ಞಾನ ನಮ್ಮೊಳಗೆ ದೃಢವಾಗಿ ಅಪರೋಕ್ಷವಾದಾಗ, ಹಿಂದೆ ಫಲಕಾಮನೆಯಿಂದ ಮಾಡಿದ ಎಲ್ಲಾ ಪಾಪಗಳನ್ನು ಆ ಜ್ಞಾನಾಗ್ನಿ ಸುಟ್ಟುಬಿಡುತ್ತದೆ" ಎಂದು. ಆದ್ದರಿಂದ ಜ್ಞಾನ ಎಲ್ಲಕ್ಕಿಂತ ಶ್ರೇಷ್ಠ. ಇದನ್ನು ನಾವು ಕಠೋಪನಿಷತ್ತಿನಲ್ಲಿ ಬರುವ ಯಮ ಮತ್ತು ನಚಿಕೇತನ ಸಂಭಾಷಣೆಯಲ್ಲಿ ಕಾಣುತ್ತೇವೆ. ಅಲ್ಲಿ ನಚಿಕೇತ ಯಮನಲ್ಲಿ ಜ್ಞಾನವನ್ನು ವರವಾಗಿ ಬೇಡಿದಾಗ ಯಮ ಆತನಿಗೆ "ನಿನಗೆ ಎಷ್ಟು ಸಂಪತ್ತು ಬೇಕು ಅದನ್ನು ಕೇಳು, ನಿನ್ನನ್ನು ಬೇಕಿದ್ದರೆ ದೊಡ್ಡ ಸಾಮ್ರಾಜ್ಯದ ಚಕ್ರವರ್ತಿಯನ್ನಾಗಿ ಮಾಡುತ್ತೇನೆ" ಎನ್ನುತ್ತಾನೆ. ಇದಕ್ಕೆ ನಚಿಕೇತ ಹೇಳುತ್ತಾನೆ " ಇದೆಲ್ಲವೂ ನರಕಕ್ಕೆ ಹೋಗುವ ಸಾಧನಗಳು, ಇದ್ಯಾವುದೂ ನನಗೆ ಬೇಡ. ನನಗೆ ಭಗವಂತನ ಬಗ್ಗೆ ತಿಳಿಯಬೇಕು" ಎಂದು. ಹೀಗೆ ನಮ್ಮ ಪಾಪ ಕರ್ಮವನ್ನು ಸಂಪೂರ್ಣ ತೊಳೆದುಕೊಂಡು ಮೋಕ್ಷಕ್ಕೆ ಹೋಗುವ ಏಕಮಾತ್ರ ಮಾರ್ಗ ಭಗವಂತನ ಬಗೆಗಿನ ಜ್ಞಾನ. ಭಗವದರ್ಪಣ ಬುದ್ಧಿಯಿಂದ ಕರ್ಮ ಅನುಷ್ಠಾನ ಮಾಡಿದಾಗ ಶುಭಾಶುಭ ಕರ್ಮದ ಕಟ್ಟಿನಿಂದ ಬಿಡುಗಡೆ ಸಾಧ್ಯ. ಕೃಷ್ಣ ಹೇಳುತ್ತಾನೆ "ಸಂನ್ಯಾಸಯೋಗಯುಕ್ತಾತ್ಮಾ ವಿಮುಕ್ತೋ ಮಾಮುಪೈಷ್ಯಸಿ" ಎಂದು. ಇಲ್ಲಿ ಹೇಳುವ ಸಂನ್ಯಾಸ ಒಂದು ಯೋಗ(ಉಪಾಯ). ಎಲ್ಲವನ್ನೂ ಭಗವಂತನಿಗೆ ಅರ್ಪಣೆ ಮಾಡಿ ಫಲಕಾಮನೆ ಇಲ್ಲದೆ ಭಗವದ್ ಪೂಜಾ ದೃಷ್ಟಿಯಿಂದ ಮಾಡುವಂತಹ ಸಾತ್ವಿಕರ ಸಾಧನೆ. ಸಂನ್ಯಾಸ ಎಂದರೆ ಕಾಮ-ಸಂಕಲ್ಪವನ್ನು ಭಗವಂತನಲ್ಲಿ ಅರ್ಪಿಸುವುದು. ಕಾಮ ಅಂದರೆ 'ಮಾಡಬೇಕು' ಎಂದು ಬಯಸುವುದು, ಸಂಕಲ್ಪ ಎಂದರೆ 'ಮಾಡುತ್ತೇನೆ' ಎಂದು ನಿರ್ಧರಿಸುವುದು. ಕಾಮಸಂಕಲ್ಪ ವರ್ಜಿತ-ಸಂನ್ಯಾಸ. ಹೀಗೆ ಭಾಗವತ ಧರ್ಮ ಪಾಲನೆ ಮಾಡಿದರೆ ಸುಲಭವಾಗಿ ಭಗವಂತನನ್ನು ಸೇರಬಹುದು-"ನಿಶ್ಚಿತವಾಗಿಯೂ ನನ್ನನ್ನು ಸೇರುತ್ತಾರೆ" ಎನ್ನುವುದು ಕೃಷ್ಣನ ಭರವಸೆ.

ಸಮೋಽಹಂ ಸರ್ವಭೂತೇಷು ನ ಮೇ ದ್ವೇಷ್ಯೋಽಸ್ತಿ ನ ಪ್ರಿಯಃ ।
ಯೇ ಭಜಂತಿ ತು ಮಾಂ ಭಕ್ತ್ಯಾ ಮಯಿ ತೇ ತೇಷು ಚಾಪ್ಯಹಮ್ ॥ ೨೯ ॥

ಸಮಃ ಅಹಮ್ ಸರ್ವಭೂತೇಷು ನ ಮೇ ದ್ವೇಷ್ಯಃ ಅಸ್ತಿ ನ ಪ್ರಿಯಃ ।
ಯೇ ಭಜಂತಿ ತು ಮಾಮ್ ಭಕ್ತ್ಯಾ ಮಯಿ ತೇ ತೇಷು ಚ ಅಪಿ ಅಹಮ್-ಎಲ್ಲಾ ಜೀವಿಗಳೂ ನನಗೆ ಒಂದೆ. ನನಗೆ ಹಗೆಯನೂ ಇಲ್ಲ, ಗೆಳೆಯನೂ ಇಲ್ಲ. ಆದರೆ ಯಾರು ನನ್ನನ್ನು ಭಕ್ತಿಯಿಂದ ಒಲಿಸುತ್ತಾರೋ ಅವರು ನನ್ನ ವಶ; ನಾನು ಅವರ ವಶ.

ಭಗವಂತನಿಗೆ ಯಾರ ಮೇಲೂ ಹಗೆಯಾಗಲೀ ಅಥವಾ ಗೆಳೆತನವಾಗಲೀ ಇಲ್ಲ. ಆತ ಪ್ರೀತಿಸುವುದು ವ್ಯಕ್ತಿಯನ್ನಲ್ಲ ಬದಲಿಗೆ ವ್ಯಕ್ತಿಯಲ್ಲಿರುವ ಜ್ಞಾನವನ್ನು ಮತ್ತು ಭಕ್ತಿಯನ್ನು. ಅರ್ಹತೆ ಇದ್ದವರು ಭಗವಂತನನ್ನು ಭಕ್ತಿಯಿಂದ ಒಲಿಸುತ್ತಾರೆ. ನಿಜವಾದ ಭಕ್ತರಿಗೆ ಭಗವಂತ ವಶನಾಗುತ್ತಾನೆ.

ಅಪಿ ಚೇತ್ ಸುದುರಾಚಾರೋ ಭಜತೇ ಮಾಮನನ್ಯಭಾಕ್ ।
ಸಾಧುರೇವ ಸ ಮಂತವ್ಯಃ ಸಮ್ಯಗ್ ವ್ಯವಸಿತೋ ಹಿ ಸಃ ॥೩೦॥

ಅಪಿ ಚೇತ್ ಸು ದುರಾಚಾರಃ ಭಜತೇ ಮಾಮ್ ಅನನ್ಯ ಭಾಕ್ ।
ಸಾಧುಃ ಏವ ಸಃ ಮಂತವ್ಯಃ ಸಮ್ಯಕ್ ವ್ಯವಸಿತಃ ಹಿ ಸಃ –ಬೇರೆಡೆಗೆ ಬಗೆಗೊಡದೆ ನನ್ನಲ್ಲೇ ಭಕ್ತಿಯಿಡುವವನು ಎಂತಹ ನಡತೆಗೇಡಿಯಾದರೂ ಮೂಲತಃ ಒಳ್ಳೆಯವನೆಂದೇ ತಿಳಿಯಬೇಕು. ಏಕೆಂದರೆ ಅವನು ಖಚಿತವಾಗಿ ನಿಜವನರಿತವನು.

ನಿಜವಾದ ಭಕ್ತರು ಸಾಮಾನ್ಯವಾಗಿ ಎಂದೂ ದುರಾಚಾರಿಗಳಾಗಿರುವುದಿಲ್ಲ. ಅಕಸ್ಮಾತ್ ಒಬ್ಬ ಸಾತ್ವಿಕ ಯಾವುದೋ ಪ್ರಾರಾಬ್ಧ ಕರ್ಮದಿಂದ ಒಂದು ಜನ್ಮದಲ್ಲಿ ನಡತೆಗೇಡಿಯಾಗಿದ್ದರೂ ಸಹ ಆತ ಮೂಲತಃ ಉತ್ತಮನೇ ಆಗಿರುತ್ತಾನೆ. ಏಕೆಂದರೆ ಆತ ತನ್ನ ಅನೇಕ ಜನ್ಮದಲ್ಲಿ ಭಗವದ್ ಸಾಧನೆ ಮಾಡಿರುತ್ತಾನೆ. ಇದು ಸಾಮಾನ್ಯರಾದ ನಮಗೆ ಕಾಣದಿದ್ದರೂ ಕೂಡಾ ಭಗವಂತನಿಗೆ ಕಾಣುತ್ತದೆ. ಭಗವಂತನ ದೃಷ್ಟಿಯಲ್ಲಿ ಆತ ಉತ್ತಮನೆನಿಸಿರುತ್ತಾನೆ. ಈ ಕಾರಣಕ್ಕಾಗಿ ನಾವು ಯಾರನ್ನೂ ಹಗುರವಾಗಿ ಕಾಣಬಾರದು. ಒಬ್ಬ ಕೆಟ್ಟ ದಾರಿಯಲ್ಲಿ ನಡೆಯುತ್ತಿದ್ದರೆ ಅದಕ್ಕೆ ಅನೇಕ ಕಾರಣಗಳಿರಬಹುದು. ಆತ ಸಾತ್ವಿಕನೂ ಇರಬಹುದು. ಆದರೆ ಆತನ ಪ್ರರಾಬ್ಧ ಕರ್ಮ ಆತನನ್ನು ಆ ಮಾರ್ಗದಲ್ಲಿ ನಡೆಯುವಂತೆ ಮಾಡಿರಬಹುದು. ಉತ್ತಮನೆನಿಸಿದವನು ಶಾಶ್ವತವಾಗಿ ಆ ದಾರಿಯಲ್ಲಿ ಸಾಗುವುದಿಲ್ಲ ಎನ್ನುತ್ತಾನೆ ಕೃಷ್ಣ ಮುಂದಿನ ಶ್ಲೋಕದಲ್ಲಿ.

ಕ್ಷಿಪ್ರಂ ಭವತಿ ಧರ್ಮಾತ್ಮಾ ಶಶ್ವಚ್ಛಾಂತಿಂ ನಿಗಚ್ಛತಿ ।
ಕೌಂತೇಯ ಪ್ರತಿಜಾನೀಹಿ ನ ಮೇ ಭಕ್ತಃ ಪ್ರಣಶ್ಯತಿ ॥೩೧॥

ಕ್ಷಿಪ್ರಮ್ ಭವತಿ ಧರ್ಮ ಆತ್ಮಾ ಶಶ್ವತ್ ಶಾಂತಿಮ್ ನಿಗಚ್ಛತಿ ।
ಕೌಂತೇಯ ಪ್ರತಿಜಾನೀಹಿ ನ ಮೇ ಭಕ್ತಃ ಪ್ರಣಶ್ಯತಿ –ಅವನು ಒಡನೆಯೇ ಸರಿದಾರಿ ಹಿಡಿಯುತ್ತಾನೆ; ಅಳಿವಿರದ ಸುಖದ ನೆಲೆಯನ್ನು ಪಡೆಯುತ್ತಾನೆ. ಕೌಂತೇಯಾ, ಇದನ್ನು ಆಣೆಯಿಟ್ಟಾಡು: 'ನನ್ನ ಭಕ್ತನೆಂದೂ ಕೆಡುವುದಿಲ್ಲ'.

ಹೀಗೆ ಪ್ರರಾಬ್ಧ ಕರ್ಮದಿಂದ ದಾರಿತಪ್ಪಿದವರು ಯಾವುದೋ ಒಂದು ಸಂದರ್ಭದಲ್ಲಿ ಒಡನೆಯೇ ತಾವು ಮಾಡುತ್ತಿರುವ ತಪ್ಪಿನ ಅರಿವಾಗಿ ಸರಿದಾರಿಯನ್ನು ಹಿಡಿಯುತ್ತಾರೆ, ಮತ್ತು ಅಳಿವಿರದ ಮೋಕ್ಷವನ್ನು ಸೇರುತ್ತಾರೆ. ಇದು ನಿಶ್ಚಿತ. ಇದನ್ನು ನೀನು ಆಣೆಮಾಡಿ ಹೇಳು ಎನ್ನುತ್ತಾನೆ ಕೃಷ್ಣ. ಇದಕ್ಕೆ ಉತ್ತಮ ಉದಾಹರಣೆ ಅಜಾಮಿಳನ ಕಥೆ. ತನ್ನ ಜೀವನದಲ್ಲಿ ಮಾಡಬಾರದ್ದನ್ನೆಲ್ಲಾ ಮಾಡಿದ ಅಜಾಮಿಳ ಮೂಲತಃ ಒಬ್ಬ ಶ್ರೇಷ್ಠ ಜೀವ. ಇಂತಹ

ಅಜಾಮಿಳನಿಗೆ ಭಗವಂತ ಜೀವನದ ಕೊನೆಗಾಲದಲ್ಲಿ ಸತ್ಯದ ದಾರಿ ತೋರಿಸಿ ಉದ್ಧಾರ ಮಾಡುತ್ತಾನೆ. ಆತ ತನ್ನ ಕೊನೆಗಾಲದಲ್ಲಿ ಸಾಧನೆ ಮಾಡಿ ಮೋಕ್ಷವನ್ನು ಸೇರುತ್ತಾನೆ.

ಇಲ್ಲಿ ಕೃಷ್ಣ ಅರ್ಜುನನಲ್ಲಿ ಏಕೆ "ನೀನು ಪ್ರತಿಜ್ಞೆ ಮಾಡು" ಎಂದು ಹೇಳುತ್ತಾನೆ ಎಂದರೆ-ಭಗವಂತ ಭಕ್ತರಿಗಾಗಿ ತನ್ನ ಪ್ರತಿಜ್ಞೆಯನ್ನು ಮುರಿದಾನು ಆದರೆ ಎಂದೂ ಭಕ್ತರ ಪ್ರತಿಜ್ಞೆಯನ್ನಲ್ಲ. ಇದಕ್ಕೆ ಉದಾಹರಣೆ ಮಹಾಭಾರತ ಯುದ್ಧದಲ್ಲಿ ನಡೆದ ಒಂದು ಘಟನೆ:

ಮಹಾಭಾರತ ಯುದ್ಧದ ಮೊದಲು ತಾನು ಶಸ್ತ್ರ ಹಿಡಿಯುವುದಿಲ್ಲ ಎಂದು ಪ್ರತಿಜ್ಞೆ ಮಾಡಿದ್ದ ಕೃಷ್ಣ, ಯುದ್ಧದ ನಡುವೆ ಅರ್ಜುನ ಭೀಷ್ಮನ ಎದುರು ಯುದ್ಧ ಮಾಡುವುದಕ್ಕೆ ಹಿಂಜರಿದಾಗ, ಕೋಪಾವೇಶದಿಂದ ಭೀಷ್ಮನನ್ನು ಸಾಯಿಸಲೆಂಬಂತೆ ರಥದಚಕ್ರವೊಂದನ್ನು ಹಿಡಿದು ಮುಂದೊತ್ತಿ ಬರುತ್ತಾನೆ! ಇದನ್ನು ನೋಡಿದ ಬೀಷ್ಮ ತನ್ನ ಎರಡೂ ಕೈಗಳನ್ನು ಜೋಡಿಸಿ ಹೀಗೆ ಹೇಳುತ್ತಾನೆ: " ಓ ಭಗವಂತಾ; ನಿನ್ನ ಕೈಯಲ್ಲಿ ಚಕ್ರ ಹಿಡಿಸುತ್ತೇನೆ, ಹಾಗೆ ಯುದ್ಧ ಮಾಡಿಸುತ್ತೇನೆ ಎಂದು ನಾನು ಪ್ರತಿಜ್ಞೆ ಮಾಡಿದ್ದೆ. ಚಕ್ರ ಹಿಡಿಯುವುದಿಲ್ಲ ಎಂದಿದ್ದೆ ನೀನು. ಆದರೆ ಈಗ ನನ್ನ ಪ್ರತಿಜ್ಞೆಯನ್ನು ಈಡೇರಿಸಲು ನೀನು ಚಕ್ರ ಹಿಡಿದಿರುವೆ. ನಿನ್ನನ್ನೇ ನೀನು ಮರೆತಿರುವೆ, ಆದರೆ ನಿನ್ನ ಭಕ್ತನ ಪ್ರತಿಜ್ಞೆಯನ್ನಲ್ಲ; ನೀನಲ್ಲದೆ ನಮಗೆ ಗತಿ ಇನ್ಯಾರು?" ಎಂದು. ಈ ಘಟನೆಯಲ್ಲಿ ಭಗವಂತ ಎಂತಹ ಭಕ್ತವತ್ಸಲ ಎನ್ನುವುದು ತಿಳಿಯುತ್ತದೆ.

ಮಾಂ ಹಿ ಪಾರ್ಥ ವ್ಯಪಾಶ್ರಿತ್ಯ ಯೇऽಪಿ ಸ್ಯುಃ ಪಾಪಯೋನಯಃ ।
ಸ್ತ್ರಿಯೋ ವೈಶ್ಯಾಸ್ತಥಾ ಶೂದ್ರಾಸ್ತೇऽಪಿ ಯಾಂತಿ ಪರಾಂ ಗತಿಮ್ ॥೩೨॥

ಮಾಮ್ ಹಿ ಪಾರ್ಥ ವ್ಯಪಾಶ್ರಿತ್ಯ ಯೇ ಅಪಿ ಸ್ಯುಃ ಪಾಪಯೋನಯಃ ।
ಸ್ತ್ರಿಯಃ ವೈಶ್ಯಾಃ ತಥಾ ಶೂದ್ರಾಃ ತೇ ಅಪಿ ಯಾಂತಿ ಪರಾಮ್ ಗತಿಮ್ –ಪಾರ್ಥಾ, ನನಗೆ ಶರಣು ಬಂದವರು ಯಾವುದೋ ಪಾಪದಿಂದ ಹೆಣ್ಣಾಗಿ, ವೈಶ್ಯರಾಗಿ, ಶೂದ್ರರಾಗಿ ಸಾಧನೆಯಿಂದ ವಂಚಿತರಾದರೂ ಹಿರಿಯ ನೆಲೆಯಾದ ನನ್ನನ್ನೇ ಪಡೆಯುತ್ತಾರೆ.

ಈ ಶ್ಲೋಕ ಕೆಲವು ಭಾಷ್ಯಕಾರರಿಗೇ ಗೊಂದಲ ಮಾಡಿದ ಶ್ಲೋಕ. ಮಧ್ವಾಚಾರ್ಯರು ಈ ಶ್ಲೋಕಕ್ಕೆ ಭಾಷ್ಯ ನೀಡುವ ತನಕ ಹೆಚ್ಚಿನವರು ಇದಕ್ಕೆ ತಪ್ಪು ಅರ್ಥವನ್ನು ಕಲ್ಪಿಸಿಕೊಂಡಿದ್ದರು. ಮೇಲ್ನೋಟದಲ್ಲಿ ಈ ಶ್ಲೋಕವನ್ನು ನೋಡಿದಾಗ "ಸ್ತ್ರೀಯರು, ವೈಶ್ಯರು ಮತ್ತು ಶೂದ್ರರು ಪಾಪಿಗಳು" ಎಂದು ತಿಳಿಯುವ ಅಪಾಯ ಹೆಚ್ಚು. ಇಲ್ಲಿ ಕೃಷ್ಣ ಹೇಳುತ್ತಿರುವುದು ಸ್ತ್ರೀ ಜೀವದ ಬಗ್ಗೆ ಅಲ್ಲ. ಸ್ತ್ರೀಯರು ಪಾಪಿಗಳಲ್ಲ. ಯಾವುದೋ ಪಾಪದಿಂದ ಅಥವಾ ಶಾಪದಿಂದ ಸ್ತ್ರೀ ಜನ್ಮ ಪಡೆದ ಗಂಡು 'ಸ್ತ್ರೀ ಪಾಪಯೋನಿ' ಹೊರತು ಹೆಣ್ಣಾಗಿರುವ ಸ್ತ್ರೀಜೀವ ಪಾಪಯೋನಿಯಲ್ಲ. ಕೃಷ್ಣ ಹೇಳುತ್ತಾನೆ "ಯಾವುದೋ ಪಾಪದಿಂದ ಹೀನಯೋನಿ ಬಂದಿರಬಹುದು, ಆದರೆ ಅಂತವರು ನನ್ನನ್ನು ಆರಾಧಿಸಿ ಎಲ್ಲಾ ದೋಷಗಳಿಂದ ಬಿಡುಗಡೆ ಹೊಂದಬಹುದು" ಎಂದು. ಇದಕ್ಕೆ ಉತ್ತಮ ದೃಷ್ಟಾಂತ ನರಕಾಸುರನ ಸೆರೆಯಲ್ಲಿದ್ದ ಹದಿನಾರು ಸಾವಿರದ ನೂರು ಮಂದಿ ಸ್ತ್ರೀಯರು. ಇವರು ಅಗ್ನಿ ಪುತ್ರರು. ಭಗವಂತನ ಪತ್ನಿಯರಾಗಬೇಕು ಎಂಬ ಆಸೆಯಿಂದ ತಮ್ಮ ಎತ್ತರವನ್ನು ಕಳೆದುಕೊಂಡು ಭೂಮಿಯಲ್ಲಿ ಹೆಣ್ಣಾಗಿ ಹುಟ್ಟಿ ನರಕಾಸುರನ ಸೆರೆಮನೆಯಲ್ಲಿ ಸಿಕ್ಕಿ ಒದ್ದಾಡಿದವರು. ಕೃಷ್ಣ ಅವರನ್ನು ಮದುವೆಯಾಗಿ ಉದ್ದರಿಸಿದ.

ನಂದಗೋಪ ಮತ್ತು ಯಶೋದೆ ಇವರು ಮೂಲತಃ ದೇವಾಂಶ ಸಂಭೂತರು. 'ದ್ರೋಣ' ನಾಮಕ ವಸು ನಂದಗೋಪ ಮತ್ತು 'ಧರ' ನಾಮಕ ವಸುಪತ್ನಿ ಯಶೋದೆ. ಅವರು ಭೂಮಿಯಲ್ಲಿ ವೈಶ್ಯರಾಗಿ ಹುಟ್ಟಿದರು. ಭಗವಂತ ತನ್ನ ಅವತಾರದಲ್ಲಿ ಅವರ ಮನೆಯಲ್ಲಿ ಬೆಳೆದು ಅವರನ್ನು ಉದ್ಧರಿಸಿದ.

ಮಹಾ ಚೇತನ ವಿಧುರ. ಈತ ಸ್ವಯಂ ಧರ್ಮರಾಯ. ವೇದವ್ಯಾಸರ ಮಗನಾಗಿದ್ದರೂ ಕೂಡಾ ಶಾಪದ ಫಲವಾಗಿ 'ಕೆಲಸದವಳ ಮಗ' ಎಂದು ಹೇಳಿಸಿಕೊಂಡು ಬದುಕಬೇಕಾಗಿ ಬಂತು. ಸಂಧಾನಕ್ಕೆ ಬಂದ ಕೃಷ್ಣ-ದುರ್ಯೋಧನ, ಭೀಷ್ಮ, ದ್ರೋಣರ ಮನೆಗೆ ಹೋಗದೆ ನೇರವಾಗಿ ವಿಧುರನ ಮನೆಗೆ ಬಂದು ಅಲ್ಲಿ ವಿಧುರನಿಂದ ಸರಳ ಸತ್ಕಾರ ಸೇವಿಸಿ ಆತನನ್ನು ಪ್ರಸನ್ನನಾಗಿ ಮಾಡಿದ. ಇಲ್ಲಿ ಭಗವಂತ ಬಯಸುವುದು ಪ್ರದರ್ಶನವನ್ನಲ್ಲ ಬದಲಿಗೆ ಪ್ರೀತಿಯನ್ನು ಎನ್ನುವುದು ಸ್ಪಷ್ಟವಾಗುತ್ತದೆ. ಆತನಿಗೆ ಅಂತರಾತ್ಮ ಮುಖ್ಯ, ಮುಖವಾಡವಲ್ಲ.

ಹೀಗೆ ಕೃಷ್ಣ ಸ್ಪಷ್ಟವಾಗಿ ಹೇಳುತ್ತಾನೆ "ಯಾವುದೋ ಪಾಪ ಕರ್ಮದಿಂದ ಅಥವಾ ಶಾಪದಿಂದ ಹೀನಯೋನಿಯಾಗಿ ಹುಟ್ಟಿದವರು ನನ್ನನ್ನು ಆಶ್ರಯಿಸಿದಾಗ ಪಾಪದಿಂದ ಕಳಚಿಕೊಂಡು ನನ್ನನ್ನು ಸೇರುತ್ತಾರೆ" ಎಂದು.

ಕಿಂ ಪುನರ್ಬ್ರಾಹ್ಮಣಾಃ ಪುಣ್ಯಾ ಭಕ್ತಾ ರಾಜರ್ಷಯಸ್ತಥಾ ।
ಅನಿತ್ಯಮಸುಖಂ ಲೋಕಮಿಮಂ ಪ್ರಾಪ್ಯ ಭಜಸ್ವ ಮಾಮ್॥೩೩॥

ಕಿಮ್ ಪುನಃ ಬ್ರಾಹ್ಮಣಾಃ ಪುಣ್ಯಾಃ ಭಕ್ತಾಃ ರಾಜ ಋಷಯಃ ತಥಾ ।
ಅನಿತ್ಯಮ್ ಅಸುಖಮ್ ಲೋಕಮ್ ಇಮಮ್ ಪ್ರಾಪ್ಯ ಭಜಸ್ವ ಮಾಮ್ -- ಪುಣ್ಯದ ಫಲದಿಂದ ಬ್ರಾಹ್ಮಣರಾಗಿ, ಋಷಿಗಳಂತಹ ಅರಸರಾಗಿ ಹುಟ್ಟಿ ಬಂದು ಭಕ್ತಿ ಮಾಡುವವರ ಬಗೆಗೆ ಹೇಳುವುದೇನು? ಅದರಿಂದ ಸ್ಥಿರವಲ್ಲದ, ಸುಖವಿಲ್ಲದ ನರಜನ್ಮ ಬಂದಾಗ ನನ್ನನ್ನು ಆರಾಧಿಸು.

"ಪುಣ್ಯದ ಫಲದಿಂದ ರಾಜರ್ಷಿಗಳಾಗಿ, ಬ್ರಹ್ಮಜ್ಞಾನಿಗಳಾಗಿ ಹುಟ್ಟಿ ಭಗವಂತನನ್ನು ಆರಾಧಿಸುವವರ ಬಗೆಗೆ ವಿಶೇಷವಾಗಿ ಹೇಳಬೇಕೇನು?" ಎಂದು ಪ್ರಶ್ನಿಸುತ್ತಾನೆ ಕೃಷ್ಣ. ಹೀಗೆ ಭಗವಂತನಲ್ಲಿ ಶರಣಾಗಿ ಆಶ್ರಯ ಬೇಡುವ ಪ್ರತಿಯೊಬ್ಬರ ರಕ್ಷಣೆಯ ಭಾರ ಭಗವಂತನದ್ದು. ಅದಕ್ಕಾಗಿ ಕೃಷ್ಣ ಇಲ್ಲಿ ನಮಗೆ ಕಿವಿ ಮಾತನ್ನು ಹೇಳುತ್ತಾನೆ: "ನೀನು ಈ ಪ್ರಪಂಚವೇ ಸರ್ವಸ್ವ ಎಂದು ಪ್ರಪಂಚದಲ್ಲಿ ಬಿದ್ದು ಒದ್ದಾಡಬೇಡ. ಏಕೆಂದರೆ ಇದು 'ಅನಿತ್ಯಮ್ ಅಸುಖಮ್ ಲೋಕಮ್'. ಇದರಲ್ಲಿ ಸುಖವಿಲ್ಲ. ಇದು ಶಾಶ್ವತವಲ್ಲ. ಆದ್ದರಿಂದ ಶಾಶ್ವತವಾದ ಆನಂದವನ್ನು ಪಡೆಯುವುದಕ್ಕೋಸ್ಕರ ನನ್ನನ್ನು ಆಶ್ರಯಿಸು. ನನಗೆ ಶರಣಾಗು. ನಿನ್ನನ್ನು ಉದ್ಧಾರ ಮಾಡುವ ಹೊಣೆ ನನ್ನದು".

ಮನ್ಮನಾ ಭವ ಮದ್ಭಕ್ತೋ ಮದ್ಯಾಜೀ ಮಾಂ ನಮಸ್ಕುರು ।
ಮಾಮೇವೈಷ್ಯಸಿ ಯುಕ್ತ್ವೈವಮಾತ್ಮಾನಂ ಮತ್ಪರಾಯಣಃ ॥೩೪॥

ಮತ್ ಮನಾಃ ಭವ ಮತ್ ಭಕ್ತಃ ಮತ್ ಯಾಜೀ ಮಾಮ್ ನಮಸ್ಕುರು ।
ಮಾಮ್ ಏವ ಎಷ್ಯಸಿ ಯುಕ್ತ್ವಾ ಏವಮ್ ಆತ್ಮಾನಮ್ ಮತ್ ಪರಾಯಣಃ –ನನ್ನಲ್ಲೇ ಬಗೆಯಿಡು. ನನ್ನನ್ನು

ಅತಿಶಯವಾಗಿ ಪ್ರೀತಿಸು. ನನ್ನನ್ನೇ ಆರಾಧಿಸು.ನನಗೇ ತಲೆಬಾಗು. ಬಗೆಯನ್ನು ಹೀಗೆ ಅಣಿಗೊಳಿಸಿ ನನಗೇ ಮೊರೆ ಹೊಕ್ಕಾಗ ನನ್ನನ್ನೇ ಸೇರುವೆ.

ನಾವು ನಮ್ಮ ಜೀವನದಲ್ಲಿ ಸಾಧಿಸಬೇಕಾದ ಒಂದೇ ಒಂದು ಸಂಗತಿ ಎಂದರೆ ಮನಸ್ಸನ್ನು ಭಗವಂತನಲ್ಲಿ ನೆಲೆಗೊಳಿಸುವುದು. ವ್ಯವಹಾರ ಪ್ರಪಂಚದಲ್ಲಿನ ಸಾವಿರಾರು ವಿಚಾರಗಳು ನಮ್ಮನ್ನು ಉದ್ಧಾರ ಮಾಡಲಾರವು. ಅವು ನಮ್ಮನ್ನು ಮರಳಿ ಅಧಃಪಾತಕ್ಕೆ ಕೊಂಡೊಯ್ಯುತ್ತವೆ. ಆದ್ದರಿಂದ ಅವೆಲ್ಲವನ್ನೂ ಬಿಟ್ಟು ಮನಸ್ಸಿನಲ್ಲಿ ಭಗವಂತನನ್ನು ತುಂಬಿಸಬೇಕು. ಭಗವಂತನನ್ನು ನಿರಂತರ ಪ್ರೀತಿಸಬೇಕು. ನೀನು ಎಷ್ಟು ಗಾಢವಾಗಿ ಭಗವಂತನನ್ನು ಪ್ರೀತಿಸುತ್ತೀಯೋ ಅಷ್ಟೇ ಗಾಢವಾಗಿ ಭಗವಂತ ನಿನ್ನನ್ನು ಪ್ರೀತಿಸುತ್ತಾನೆ. ಶ್ರೀ ಸೂಕ್ತದಲ್ಲಿ ಹೇಳುವಂತೆ "ತ್ವನ್ಮಾ ಭಜಸ್ವ ಪದ್ಮಾಕ್ಷಿ, ಯೇನ ಸೌಖ್ಯಂ ಲಭಾಮ್ಯಹಮ್". ನಾನು ನಿನ್ನನ್ನು ಭಜನೆ ಮಾಡುತ್ತೇನೆ, ನೀನು ನನ್ನನ್ನು ಭಜನೆ ಮಾಡು". ಇಲ್ಲಿ ಭಜನೆ ಎಂದರೆ ಭಕ್ತಿಯಿಂದ ಪ್ರೀತಿಸುವುದು.

ನೀನು ಏನು ಪೂಜೆ ಮಾಡುತ್ತೀಯೋ ಅದು ಭಗವಂತನ ಪೂಜೆಯಾಗಿರಲಿ, ನಿನ್ನ ಎಲ್ಲಾ ಪ್ರೀತಿಯಲ್ಲಿ ಭಗವಂತನನ್ನು ಕಾಣು. ನೀನು ಮಾಡುವ ಎಲ್ಲಾ ನಮಸ್ಕಾರ ಭಗವಂತನ ನಮಸ್ಕಾರವಾಗಿರಲಿ. ಹೀಗೆ ಮಾಡಿ ನಿನ್ನ ಮನಸ್ಸನ್ನು ಭಗವಂತನಲ್ಲಿ ನೆಲೆಗೊಳಿಸಿ ಇಡಿಯ ಬದುಕನ್ನು ಭಗವನ್ಮಯ ಮಾಡಿಕೋ- ನಿನಗೆ ಎಲ್ಲಕ್ಕಿಂತ ದೊಡ್ಡ ವಸ್ತು ಭಗವಂತ, ಬದುಕಿನ ಸಾರ ಸರ್ವಸ್ವ ಭಗವಂತ, ನಿರಂತರ ಚಿಂತನೆಯ ವಸ್ತು ಭಗವಂತನಾಗಲಿ. ನಿನ್ನ ಬದುಕಿನ ಒಂದೊಂದು ಕ್ರಿಯೆಯೂ ಭಗವಂತನ ಆರಾಧನೆಯಾಗಲಿ. ಆಗ "ನೀನು ನನ್ನನ್ನು ಸೇರಲೇ ಬೇಕು" ಎನ್ನುತ್ತಾನೆ ಕೃಷ್ಣ. ಹೀಗೆ ಮೋಕ್ಷ ಸಾಧಕವಾದ ಉಪಾಸನೆಯನ್ನು ಕೃಷ್ಣ ವಿವರಿಸಿದ ಅನ್ನುವಲ್ಲಿಗೆ ಒಂಬತ್ತನೆಯ ಅಧ್ಯಾಯ ಮುಕ್ತಾಯವಾಯಿತು.

ಇತಿ ನವಮೋऽಧ್ಯಾಯಃ

ಒಂಬತ್ತನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಹತ್ತು

ನಾವು ಉಪಾಸನೆ ಮಾಡಬೇಕಾದ ಭಗವಂತನ ಗುಣವನ್ನು, ಜ್ಞಾನ ವಿಜ್ಞಾನವನ್ನು ಅರ್ಜುನನಿಗೆ ವಿವರಿಸಿದ ಕೃಷ್ಣ, ಆತನಲ್ಲಿ ಅರಳಿದ ಜ್ಞಾನ ತೃಷೆಯನ್ನು, ಪೂರ್ಣ ನಿಷ್ಠೆಯನ್ನು ಗುರುತಿಸಿ-ವಿಶೇಷವಾಗಿ ಉಪಾಸನೆಯಲ್ಲಿ ಅಳವಡಿಸಿಕೊಳ್ಳಬೇಕಾದ ಅನುಸಂಧಾನವನ್ನು, ಭಗವಂತನ ವಿಭೂತಿಯನ್ನು ಈ ಅಧ್ಯಾಯದಲ್ಲಿ ವಿವರಿಸುತ್ತಾನೆ.

ಸಾಮಾನ್ಯವಾಗಿ ಅಮೂಲ್ಯ ವಿದ್ಯೆಯನ್ನು ಗುರು ಸುಲಭವಾಗಿ ಬಹಿರಂಗಗೊಳಿಸುವುದಿಲ್ಲ. ಶಿಷ್ಯ ಗುರುವಿನಲ್ಲಿ ಪೂರ್ಣ ನಿಷ್ಠೆ ತೋರಿದಾಗ, ಆತನಲ್ಲಿ ಯೋಗ್ಯತೆ ಇದ್ದಾಗ ಮಾತ್ರ ಅಂತಹ ವಿಚಾರವನ್ನು ಬಿಚ್ಚಬೇಕು ಎನ್ನುತ್ತದೆ ಶಾಸ್ತ್ರ. ಹೀಗಾಗಿ ಗುರು ತನ್ನ ಶಿಷ್ಯನನ್ನು ಪರೀಕ್ಷೆ ಮಾಡದೆ ಅಮೂಲ್ಯ ವಿಚಾರವನ್ನು ಆತನಿಗೆ ಹೇಳುವುದಿಲ್ಲ. ಇದಕ್ಕೆ ಉತ್ತಮ ದೃಷ್ಟಾಂತವನ್ನು ಪ್ರಶ್ನೋಪನಿಷತ್ತಿನಲ್ಲಿ ಕಾಣಬಹುದು. ಪಿಪ್ಪಲಾದನ ಹತ್ತಿರ ಬಂದ ಆರು ಮಂದಿ ಮಹಾನ್ ವಿದ್ವಾಂಸರನ್ನು ಕುರಿತು ಆತ ಹೀಗೆ ಹೇಳುತ್ತಾನೆ:

> ಭೂಯ ಏವ ತಪಸಾ ಬ್ರಹ್ಮಚರ್ಯೇಣ ಶ್ರದ್ಧಯಾ ಸಂವಸ್ಸರಂ ಸಂವತ್ಸ್ಯಥ;
> ಯಥಾಕಾಮಂ ಪ್ರಶ್ನಾನ್ ಪೃಚ್ಛತ; ಯದಿ ವಿಜ್ಞಾಸ್ಯಾಮಃ ಸರ್ವಂ ಹ ವೋ ವಕ್ಷ್ಯಾಮ ಇತಿ ||೨||

"ಒಂದು ವರ್ಷ ತಪಸ್ಸಿನಿಂದಲೂ ಬ್ರಹ್ಮಚರ್ಯದಿಂದಲೂ ಶ್ರದ್ಧೆಯಿಂದ ವಾಸಮಾಡಿರಿ. ಒಂದು ವರ್ಷದ ನಂತರ ನಿಮ್ಮ ಇಚ್ಛಾನುಸಾರ ಪ್ರಶ್ನೆ ಕೇಳಿ. ನನಗೆ ಗೊತ್ತಿದ್ದರೆ ಉತ್ತರಿಸುತ್ತೇನೆ" ಎಂದು. ಇಲ್ಲಿ ಗುರು ಮತ್ತು ಶಿಷ್ಯರ ಪರಸ್ಪರ ಪರೀಕ್ಷೆ ಎದ್ದು ಕಾಣುತ್ತದೆ. ಆದರೆ ಗುರು ತನ್ನ ಯೋಗ್ಯ ಶಿಷ್ಯನಲ್ಲಿ ಪೂರ್ಣ ನಿಷ್ಠೆಯನ್ನು ಗುರುತಿಸಿದಾಗ, ಆತ ಪ್ರಶ್ನಿಸದಿದ್ದರೂ ಕೂಡಾ ಸಂತೋಷದಿಂದ ತನ್ನಲ್ಲಿರುವ ಜ್ಞಾನವನ್ನು ಆತನಿಗೆ ಧಾರೆಯೆರೆಯುತ್ತಾನೆ. ಈ ಹಂತದಲ್ಲಿ ಕೃಷ್ಣ ಅರ್ಜುನನಲ್ಲಿ ಕಂಡಿದ್ದು ಇಂತಹ ಪೂರ್ಣನಿಷ್ಠೆ.

> ಭಗವಾನುವಾಚ ।
> ಭೂಯ ಏವ ಮಹಾಬಾಹೋ ಶೃಣು ಮೇ ಪರಮಂ ವಚಃ ।
> ಯತ್ ತೇऽಹಂ ಪ್ರೀಯಮಾಣಾಯ ವಕ್ಷ್ಯಾಮಿ ಹಿತಕಾಮ್ಯಯಾ॥೧॥

ಭಗವಾನ್ ಉವಾಚ –ಭಗವಂತ ಹೇಳಿದನು:

ಭೂಯಃ ಏವ ಮಹಾಬಾಹೋ ಶೃಣು ಮೇ ಪರಮಮ್ ವಚಃ ।

ಯತ್ ತೇ ಅಹಮ್ ಪ್ರೀಯಮಾಣಾಯ ವಕ್ಷ್ಯಾಮಿ ಹಿತ ಕಾಮ್ಯಯಾ- ಓ ಮಹಾವೀರ, ಇನ್ನೂ ಕೇಳು ನನ್ನ ಹಿರಿನುಡಿಯನ್ನು, ಏಕೆಂದರೆ ಕೇಳಿ ಖುಷಿಪಡುತ್ತಿರುವ ನಿನಗೆ ಒಳಿತನ್ನು ಬಯಸಿಯೆ ನಾನು ಹೇಳುತ್ತಿದ್ದೇನೆ.

ಗುರುವಿಗೆ ಜ್ಞಾನ ಕೊಡುವುದರಲ್ಲಿ ಅತೃಪ್ತಿ ಬರುವುದು ಶಿಷ್ಯನ ಪ್ರತಿಭೆ ಮತ್ತು ಗುಣ ವಿಶೇಷದಿಂದ. ಇಲ್ಲಿ ಕೃಷ್ಣ ಹೇಳುತ್ತಾನೆ: "ನಿನಗೆ ಇನ್ನಷ್ಟು ಹೇಳುತ್ತೇನೆ" ಎಂದು. ಏಕೆಂದರೆ ಇಲ್ಲಿ ಹೇಳುವ ವಿಷಯ "ಪರಮಮ್ ವಚಃ" ಎನ್ನುತ್ತಾನೆ ಕೃಷ್ಣ. ಇಲ್ಲಿ 'ಪರಮಂ' ಎಂದರೆ ನಾವು ತಿಳಿದುಕೊಳ್ಳಬೇಕಾದ ವಿಷಯದಲ್ಲೇ ಶ್ರೇಷ್ಠವಾದ ವಿಷಯ. ಅದು ಎಲ್ಲಕ್ಕಿಂತ ಮಿಗಿಲಾದ ಪರತತ್ವದ ಅರಿವನ್ನು ಕೊಡತಕ್ಕ ಶ್ರೇಷ್ಠ ಜ್ಞಾನ. ಇಡೀ ಲೋಕಕ್ಕೆ ಉಪಕಾರವಾಗುವಂತಾದ್ದು . ಇದಕ್ಕಿಂತ ಮಿಗಿಲಾದ ಇನ್ನೊಂದು ಸಂಗತಿ ಇಲ್ಲ. "ನೀನು ಈ ಯುದ್ಧ ಭೂಮಿಯಲ್ಲಿ ನಿಂತು ಇದನ್ನು ಕೇಳಿ ಸಂತೋಷಪಡುತ್ತಿದ್ದೀಯ, ನಿನ್ನಲ್ಲಿ ಆ ಆನಂದ ಚಿಮ್ಮುತ್ತಿದೆ. ಅದಕ್ಕೋಸ್ಕರ, ಜಗತ್ತಿನ ಹಿತಕ್ಕೋಸ್ಕರ ಹೇಳುತ್ತೇನೆ ಕೇಳು" ಎನ್ನುತ್ತಾನೆ ಕೃಷ್ಣ.

ನ ಮೇ ವಿದುಃ ಸುರಗಣಾಃ ಪ್ರಭವಂ ನ ಮಹರ್ಷಯಃ ।
ಅಹಮಾದಿರ್ಹಿ ದೇವಾನಾಂ ಮಹರ್ಷೀಣಾಂ ಚ ಸರ್ವಶಃ ॥೨॥

ನ ಮೇ ವಿದುಃ ಸುರ ಗಣಾಃ ಪ್ರಭವಮ್ ನ ಮಹಾ ಋಷಯಃ ।
ಅಹಮ್ ಆದಿಃ ಹಿ ದೇವಾನಾಮ್ ಮಹಾ ಋಷೀಣಾಮ್ ಚ ಸರ್ವಶಃ –ನನ್ನ ಆಳವನ್ನು, [ನಾನು ಜಗವನ್ನು ನಿರ್ಮಿಸುವ ಬಗೆಯನ್ನು] ದೇವತೆಗಳಾಗಲೀ, ಮಹರ್ಷಿಗಳಾಗಲೀ, ಅಥವಾ ಇನ್ಯಾರೂ ತಿಳಿದಿಲ್ಲ. ದೇವತೆಗಳಿಗೆ, ಹಿರಿಯ ಋಷಿಗಳಿಗೆ , ಎಲ್ಲರಿಗೂ ಮೂಲ ನಾನೇ ಅಲ್ಲವೆ?

ಕೃಷ್ಣ ಇಲ್ಲಿ ಒಂದು ಮೂಲಭೂತವಾದ ಸಂಗತಿಯನ್ನು ತಿಳಿಸುತ್ತಿದ್ದಾನೆ. ಕೃಷ್ಣ ಹೇಳುತ್ತಾನೆ: "ನನ್ನ ಪ್ರಭವವನ್ನು ಮಹರ್ಷಿಗಳಿಂದ ಹಿಡಿದು ಬ್ರಹ್ಮಾದಿ ದೇವತೆಗಳೂ ತಿಳಿದಿಲ್ಲ" ಎಂದು. ಇಲ್ಲಿ 'ಪ್ರಭವ' ಎನ್ನುವ ಪದವನ್ನು ಮೂರು ಅರ್ಥದಲ್ಲಿ ಬಳಸಲಾಗಿದೆ. ಪ್ರಭವ ಎಂದರೆ ಮೂಲ ಅಥವಾ ಹುಟ್ಟು; ಪ್ರಭವ ಎಂದರೆ ಸಾಮರ್ಥ್ಯ ಅಥವಾ ಹಿರಿಮೆ; ಪ್ರಭವ ಎಂದರೆ ಜಗತ್ತಿನ ಉತ್ಪತ್ತಿ. "ನನ್ನ ಮೂಲ, ನನ್ನ ಮಹಿಮೆ ಮತ್ತು ನನ್ನಿಂದಾದ ಈ ಜಗತ್ತಿನ ಹುಟ್ಟು-ನನ್ನನ್ನು ಸಾಕ್ಷಾತ್ಕರಿಸಿಕೊಂಡ ಮಹಾಜ್ಞಾನಿಗಳಿಂದ ಹಿಡಿದು, ನನ್ನ ಅಪರೋಕ್ಷ ಜ್ಞಾನ ಪಡೆದ ಬ್ರಹ್ಮಾದಿ ದೇವತೆಗಳಿಗೂ ತಿಳಿದಿಲ್ಲ" ಎನ್ನುತ್ತಾನೆ ಕೃಷ್ಣ.

ಯೋ ಮಾಮಜಮನಾದಿಂ ಚ ವೇತ್ತಿ ಲೋಕಮಹೇಶ್ವರಮ್ ।
ಅಸಮ್ಮೂಢಃ ಸ ಮರ್ತ್ಯೇಷು ಸರ್ವಪಾಪೈಃ ಪ್ರಮುಚ್ಯತೇ ॥೩॥

ಯಃ ಮಾಮ್ ಅಜಮ್ ಅನಾದಿಮ್ ಚ ವೇತ್ತಿ ಲೋಕ ಮಹಾ ಈಶ್ವರಮ್ ।
ಅಸಮ್ಮೂಢಃ ಸಃ ಮರ್ತ್ಯೇಷು ಸರ್ವ ಪಾಪೈಃ ಪ್ರಮುಚ್ಯತೇ –ನಾನು ಹುಟ್ಟಿರದವನು. ಎಲ್ಲವನ್ನೂ ನಡೆಸುತ್ತಾ ಎಲ್ಲದರ ಮೊದಲಿದ್ದವನು [ಪ್ರಾಣತತ್ವಕ್ಕೂ ಮೂಲಕಾರಣ]. ಎಲ್ಲಾ ಲೋಕಗಳ ಒಡೆಯರಿಗೂ ಹಿರಿಯೊಡೆಯ. ಮನುಜರಲ್ಲಿ ಹೀಗೆ ನನ್ನನ್ನು ತಿಳಿದವನು ಮೋಹವಳಿದವನು. ಅವನು ಪಾಪಗಳಿಂದ ಪಾರಾಗುತ್ತಾನೆ.

ನಮ್ಮಲ್ಲಿ ಕೆಲವರಿಗೆ ಒಂದು ಪ್ರಶ್ನೆ ಬರುವುದಿದೆ. "ಸಕಲ ಜೀವಜಾತವನ್ನು ಭಗವಂತ ಸೃಷ್ಟಿ ಮಾಡಿದರೆ ಆತನನ್ನು ಯಾರು ಸೃಷ್ಟಿ ಮಾಡಿದರು" ಎಂದು. ಒಂದು ವೇಳೆ ಭಗವಂತನನ್ನು ಇನ್ನೊಬ್ಬ ಸೃಷ್ಟಿ ಮಾಡುತ್ತಿದ್ದರೆ ನಾವು ಈತನನ್ನು ದೇವರು ಎಂದು ಹೇಳಲಾಗುತ್ತಿರಲಿಲ್ಲ. ಕೃಷ್ಣನಿಗೆ ನಮ್ಮ ಸಂದೇಹ ಏನು ಎನ್ನುವುದು ಗೊತ್ತು. ಅದಕ್ಕಾಗಿ ಆತ ಈ ಶ್ಲೋಕದಲ್ಲಿ ನಮ್ಮ ಪ್ರಶ್ನೆಗೆ ಉತ್ತರ ನೀಡಿದ್ದಾನೆ. ಕೃಷ್ಣ ಹೇಳುತ್ತಾನೆ "ಯಃ ಮಾಮ್ ಅಜಮ್ ಅನಾದಿಮ್ " ಎಂದು. ಇಲ್ಲಿ 'ಅಜ' ಎಂದರೆ ಹುಟ್ಟಿರದವನು. ಭಗವಂತ ಹುಟ್ಟು ಸಾವಿನಿಂದಾಚೆ ನಿಂತವನು. ಅದಕ್ಕಾಗಿ ನಾವು ಹುಟ್ಟು-ಸಾವಿನಿಂದ ಪಾರಾಗಬೇಕಾದರೆ ಆತನನ್ನು ಉಪಾಸನೆ ಮಾಡಿ ಆತನನ್ನು ಸೇರಬೇಕು. ಭಗವಂತ ಅನಾದಿ. ಇಲ್ಲಿ ಅನಾದಿ(ಅನ+ಆದಿ) ಎಂದರೆ: 'ಸೃಷ್ಟಿಗೆ ಮೊದಲು ಪ್ರೇರಣೆ ಮಾಡುತ್ತಿದ್ದವ ಮತ್ತು ಸೃಷ್ಟಿ ಮಾಡಿ ಈ ಸೃಷ್ಟಿಯಲ್ಲಿ ಸಮಸ್ತ ವ್ಯಾಪಾರವನ್ನು ನಿಯಂತ್ರಣ ಮಾಡತಕ್ಕ ಸರ್ವೋತ್ಕೃಷ್ಟ ಶಕ್ತಿ'.
ಭಗವಂತ 'ಲೋಕಮಹೇಶ್ವರಃ'. ಬ್ರಹ್ಮಾದಿ ಸಮಸ್ತ ದೇವತೆಗಳು-'ಲೋಕೇಶರು'. ಅವರನ್ನು ಹೆತ್ತ ಮಾತೆ ಲಕ್ಷ್ಮಿ-'ಲೋಕೇಶ್ವರಿ'. ಅವಳಿಗೂ ಮಹಾನ್-'ಲೋಕಮಹೇಶ್ವರ' ಆ ಭಗವಂತ. ಅವನಿಗಿಂತ ಮಹತ್ತಾದ ಇನ್ನೊಂದು ತತ್ವವಿಲ್ಲ. ಆತ ಹುಟ್ಟು ಸಾವನ್ನು ಮೀರಿನಿಂತವ.

ಮಹರ್ಷಿಗಳು, ದೇವತೆಗಳು, ಎಲ್ಲರನ್ನೂ ಸೃಷ್ಟಿ ಮಾಡಿದವ ಆ ಭಗವಂತ. ಆದ್ದರಿಂದ ಇವರ್ಯಾರೂ ಆತನ ಮಹಿಮೆಯ ತುದಿಯನ್ನು ಕಂಡಿಲ್ಲ. ಋಗ್ವೇದದಲ್ಲಿ ಒಂದು ಕಡೆ ಹೀಗೆ ಹೇಳುತ್ತಾರೆ: 'ನ ತೇ ವಿಷ್ಣೋ ಜಾಯಮಾನೋ ನಾ ಜಾತೋ ದೇವ ಮಹಿಮ್ನಃ ಪರಮಂತಮಾಪ' ಎಂದು. ಹಿಂದೆ ಹುಟ್ಟಿದವರಾಗಲೀ, ಮುಂದೆ ಹುಟ್ಟುವವರಾಗಲೀ, ಭಗವಂತನ ಮಹಿಮೆಯ ತುತ್ತ ತುದಿಯನ್ನು ತಿಳಿದಿಲ್ಲ, ತಿಳಿಯಲು ಸಾಧ್ಯವಿಲ್ಲ. ಏಕೆಂದರೆ ಅದು ಅನಂತ.
ಈ ಪ್ರಪಂಚದ ಸೃಷ್ಟಿ ಹೇಗಾಯಿತು ಎನ್ನುವುದು ಕೂಡಾ ಯಾರಿಗೂ ತಿಳಿದಿಲ್ಲ. ಏಕೆಂದರೆ ಪ್ರಳಯ ಕಾಲದಲ್ಲಿ ಎಲ್ಲವೂ ಭಗವಂತನ ಉದರದಲ್ಲಿ ನಿದ್ರಾವಸ್ತೆಯಲ್ಲಿದ್ದು, ಆ ನಂತರ ಸೃಷ್ಟಿ ಕಾಲದಲ್ಲಿ ಮೊತ್ತ ಮೊದಲಿಗೆ ಚತುರ್ಮುಖನನ್ನು ಭಗವಂತ ಸೃಷ್ಟಿ ಮಾಡಿದ. ಆದ್ದರಿಂದ ಚತುರ್ಮುಖನ ಹುಟ್ಟಿಗಿಂತ ಮೊದಲೇ ಆರಂಭವಾದ ಈ ಸೃಷ್ಟಿ ನಿರ್ಮಾಣವನ್ನು ಕಂಡವರ್ಯಾರೂ ಇಲ್ಲ. ಇದಕ್ಕಾಗಿ ಋಗ್ವೇದದಲ್ಲಿ "ಈ ಸೃಷ್ಟಿಯ ರಹಸ್ಯ ತಿಳಿದಿದ್ದರೆ ಒಬ್ಬ ಜಾಣ ಮಗನಿಗೆ ತಿಳಿದಿರಬೇಕು" ಎನ್ನುತ್ತಾರೆ. ಆತನೇ ಭಗವಂತನ ಸೃಷ್ಟಿಯ ಮೊದಲ ಜೀವ-'ಚತುರ್ಮುಖ ಬ್ರಹ್ಮ'. ಈ ಎಲ್ಲಾ ಕಾರಣದಿಂದ ಸಾಮಾನ್ಯ ಮಾನವರಾದ ನಾವು ಭಗವಂತನ ಪೂರ್ಣ ಮಹಿಮೆಯನ್ನು ತಿಳಿಯಲು ಸಾಧ್ಯವೇ ಇಲ್ಲ. ಇದನ್ನು ಆಚಾರ್ಯರು ಹೀಗೆ ಹೇಳಿದ್ದಾರೆ: "ಬಹು ಚಿತ್ರ ಜಗತ್ ಬಹುದಾಕಾರಣಾತ್ ಪರಶಕ್ತಿರನಂತ ಗುಣಃ ಪರಮಃ" ಎಂದು. ಭಗವಂತನ ಸೃಷ್ಟಿಯ ಈ ಪ್ರಪಂಚವೇ ಇಷ್ಟೊಂದು ಅದ್ಭುತವಾಗಿರುವಾಗ-ಆ ಸೃಷ್ಟಿಕರ್ತ ಅದೆಷ್ಟು ಅದ್ಭುತವಾಗಿರಬೇಕು. ಆದ್ದರಿಂದ ಭಗವಂತ ಅನಂತ ಎನ್ನುವ ನಿಜವನ್ನರಿತು ಆತನನ್ನು ಉಪಾಸನೆ ಮಾಡುವುದೊಂದೇ ಮೋಕ್ಷ ಮಾರ್ಗ. ಭಗವಂತನ ಬಗ್ಗೆ ಈ ನಿಜವನ್ನು ತಿಳಿದವ 'ಅಸಮ್ಮೂಢ'. ಆತ ಯಾವ ಭ್ರಮೆಗೂ ಒಳಗಾಗದೆ ಸದಾ ಎಲ್ಲರನ್ನು ಪ್ರೀತಿಸುತ್ತಾ ಎಲ್ಲರಲ್ಲೂ ಭಗವಂತನನ್ನು ಕಾಣುತ್ತಿರುತ್ತಾನೆ. "ಈ ಸತ್ಯವನ್ನರಿತ ಸಾಧಕ ಸರ್ವ ಪಾಪಗಳಿಂದ ಪಾರಾಗುತ್ತಾನೆ" ಎನ್ನುವುದು ಕೃಷ್ಣನ ಭರವಸೆ.

ಬುದ್ಧಿರ್ಜ್ಞಾನಮಸಂಮೋಹಃ ಕ್ಷಮಾ ಸತ್ಯಂ ದಮಃ ಶಮಃ ।
ಸುಖಂ ದುಃಖಂ ಭವೋಽಭಾವೋ ಭಯಂ ಚಾಭಯಮೇವ ಚ ॥೪॥

ಬುದ್ಧಿಃ ಜ್ಞಾನಮ್ ಅಸಮ್ಮೋಹಃ ಕ್ಷಮಾ ಸತ್ಯಮ್ ದಮಃ ಶಮಃ ।
ಸುಖಮ್ ದುಃಖಮ್ ಭವಃ ಅಭಾವಃ ಭಯಮ್ ಚ ಅಭಯಮ್ ಏವ ಚ -- ವಿವೇಕ[ಅಂತಃಕರಣ], ಅರಿವು, ಕೆಟ್ಟದ್ದನ್ನು ಮಾಡಬಯಸದಿರುವುದು, ತಪ್ಪಿಗನ ಮೇಲೂ ರೇಗದಿರುವುದು, ದಿಟದ ನಡೆ, ಇಂದ್ರಿಯಗಳ ಹಿಡಿತ, ಭಗವಂತನಲ್ಲಿ ನಿಷ್ಠೆ, ಸುಖ-ದುಃಖ, ಹುಟ್ಟು-ಸಾವು, ಭಯ-ಕೆಚ್ಚು ಈ ಎಲ್ಲಾ ಬಗೆಗಳೂ ನನ್ನಿಂದಲೇ ಉಂಟಾಗುತ್ತವೆ.

ಭಗವಂತನ ಉಪಾಸನೆಯಲ್ಲಿ ನಾವು ತಿಳಿದಿರಬೇಕಾದ ಮುಖ್ಯವಾದ ವಿಚಾರವನ್ನು ಕೃಷ್ಣ ಇಲ್ಲಿ ವಿವರಿಸುತ್ತಾನೆ. ನಮಗೆ ಬುದ್ಧಿ, ಜ್ಞಾನ, ಅಸಮ್ಮೋಹ, ಕ್ಷಮಾ, ಸತ್ಯಂ, ದಮಃ-ಶಮಃ -ಎಲ್ಲವನ್ನು ಕೊಡುವವನು ಆ ಭಗವಂತ. ಕೆಲವರಿಗೆ ತಾವು ತುಂಬಾ ಬುದ್ಧಿವಂತರು ಎನ್ನುವ ಭ್ರಮೆ ಇರುತ್ತದೆ. ಆದರೆ ಆ ಬುದ್ಧಿಶಕ್ತಿಯನ್ನು ಕರುಣಿಸುವವ ಭಗವಂತ ಎನ್ನುವ ಸತ್ಯವನ್ನು ಅವರು ತಿಳಿದಿರುವುದಿಲ್ಲ. ಕೃಷ್ಣ ಹೇಳುತ್ತಾನೆ: "ನಿನಗೆ ಬುದ್ಧಿ ಕೊಡುವವನೂ ನಾನು, ಜ್ಞಾನ ಕೊಡುವವನೂ ನಾನು" ಎಂದು. ಇಲ್ಲಿ 'ಜ್ಞಾನ' ಎಂದರೆ ಒಂದು ವಸ್ತುವಿನ ಅರಿವು. 'ಬುದ್ಧಿ' ಎಂದರೆ ಏನು ಮಾಡಬೇಕು, ಏನು ಮಾಡಬಾರದು ಎನ್ನುವ ವಿವೇಕ. ನಮ್ಮಲ್ಲಿ ಬುದ್ಧಿ ಮತ್ತು ಜ್ಞಾನ ಎರಡೂ ಇದ್ದಾಗ ಮಾತ್ರ ಅದು ಪೂರ್ಣ. ಜ್ಞಾನವಿದ್ದು ಬುದ್ಧಿ ಇಲ್ಲದಿದ್ದರೆ ವೇದ ನಮ್ಮಿಂದ ದೂರವಾಗುತ್ತದೆ. "ಆಚಾರ ಹೀನಂ ನ ಪುನಂತಿ ವೇದಾಃ"-ಒಬ್ಬ ಮನುಷ್ಯ ಆಚಾರ ಹೀನನಾಗಿದ್ದರೆ ಅವನನ್ನು ಎಲ್ಲಾ ವೇದಗಳೂ ಕೈಬಿಡುತ್ತವೆ. ರೆಕ್ಕೆ ಬಲಿತ ಹಕ್ಕಿಮರಿಗಳು ತಮ್ಮ ಗೂಡನ್ನು ಬಿಟ್ಟು ಹಾರಿ ಹೋದಂತೆ ವೇದವಿದ್ಯೆ ಅವನನ್ನು ಬಿಟ್ಟು ಹಾರಿ ಹೋಗುತ್ತದೆ. ಆಚಾರವಂತನಾಗಿರಬೇಕು ಎಂದು ತಿಳಿದಿರುವುದು ಜ್ಞಾನ. ಆದರೆ ಯಾವುದು ಆಚಾರ-ಯಾವುದು ಅನಾಚಾರ ಎನ್ನುವ ವಿವೇಕ ಪ್ರಜ್ಞೆ-ಬುದ್ಧಿ. ಬುದ್ಧಿ-ಜ್ಞಾನದ ಜೊತೆಗೆ ಯಾವುದೇ ಸಂಶಯವಿಲ್ಲದೆ ಸತ್ಯವನ್ನು ತಿಳಿಯುವ ಗ್ರಹಣಶಕ್ತಿ 'ಅಸಮ್ಮೋಹ'. ಇವು ಬದುಕಿನಲ್ಲಿ ನಮಗೆ ಆಸರೆಯಾಗಿರುವ ಮೂರು ಮುಖ್ಯ ಆಧಾರಸ್ಥಂಭಗಳು. ನಾವು ಇದನ್ನು ತಿಳಿದು ಆ ಭಗವಂತನನ್ನು ಉಪಾಸನೆ ಮಾಡಬೇಕು.

ನಾಲ್ಕನೇ ಗುಣ 'ಕ್ಷಮಾ'. ಇದು ಅತ್ಯಂತ ದೊಡ್ಡ ಗುಣ. ಯಾರಾದರು ನಮ್ಮನ್ನು ಟೀಕೆ ಮಾಡಿದರೆ- ಆ ಟೀಕೆಯಲ್ಲಿ ನಮ್ಮನ್ನು ನಾವು ತಿದ್ದಿಕೊಳ್ಳುವ ಅಂಶ ಇದ್ದರೆ ತಿದ್ದಿಕೊಳ್ಳುವುದು. ಇಲ್ಲದೇ ಅದು ಕೇವಲ ಅಸೂಯೆಯ ಟೀಕೆಯಾಗಿದ್ದರೆ ಯಾವುದೇ ಪ್ರತೀಕಾರವಿಲ್ಲದೆ ವಿಷಯವನ್ನು ಅಲ್ಲೇ ಬಿಟ್ಟುಬಿಡುವುದು 'ಕ್ಷಮಾ'.

ಐದನೇ ಗುಣ 'ಸತ್ಯಂ'. ಸತ್ಯಮ್ ಎಂದರೆ ಪ್ರಾಮಾಣಿಕತೆ. ಇಂದು ನಾವು ಸಜ್ಜನಿಕೆಯನ್ನು ಮರೆತು ಸಜ್ಜನಿಕೆಯ ಮುಖವಾಡದಲ್ಲಿ ಬದುಕುತ್ತಿದ್ದೇವೆ. ಅಪ್ರಮಾಣಿಕತೆ ಎನ್ನುವುದು ನಮ್ಮ ಜೀವನವನ್ನು ಆವರಿಸಿಕೊಂಡುಬಿಟ್ಟಿದೆ. ಪ್ರಾಮಾಣಿಕತೆ ಇಲ್ಲದೆ ಯಾವ ಆಚಾರ ಸಂಪತ್ತಿದ್ದರೂ ಉಪಯೋಗವಿಲ್ಲ. ಒಬ್ಬ ವ್ಯಕ್ತಿಯ ಎದುರೊಂದು ಮತ್ತು ಹಿಂದೊಂದು ಮಾತನಾಡುವುದು ಅಪ್ರಮಾಣಿಕತೆ. ನಮಗೆ ಇನ್ನೊಬ್ಬ ವ್ಯಕ್ತಿಯ ವಿಚಾರ ಇಷ್ಟವಾಗದೆ ಇದ್ದಲ್ಲಿ ಅವರಿಗೆ ಅದನ್ನು ನೇರವಾಗಿ ಹೇಳಬಹುದು ಅಥವಾ ಅವರಿಂದ ದೂರವಿರಬೇಕು. ನಮ್ಮಲ್ಲಿ ಪ್ರಾಮಾಣಿಕತೆ

ಎಲ್ಲಿಯ ತನಕ ಬೆಳೆಯುವುದಿಲ್ಲವೋ ಅಲ್ಲಿಯ ತನಕ ಯಾವ ಶಾಸ್ತ್ರವೂ ನಮ್ಮನ್ನು ಉದ್ಧಾರ ಮಾಡುವುದಿಲ್ಲ. ನಾವು ನಮಗೆ ಇಂತಹ ಪ್ರಾಮಾಣಿಕತೆ ಕೊಡು ಎಂದು ಭಗವಂತನನ್ನು ಉಪಾಸನೆ ಮಾಡಬೇಕು.

ಆರನೆಯದಾಗಿ ದಮಾಃ. ಇದು ಇಂದ್ರಿಯಗಳಿಗೆ ಸಂಬಂಧಪಟ್ಟದ್ದು. ನಮ್ಮ ಇಂದ್ರಿಯಗಳು ನಾವು ಹೇಳಿದಂತೆ ಕೇಳುವುದಿಲ್ಲ. ಅವು ನಮ್ಮನ್ನು ಬೇಡದ ಕಡೆ ಸೆಳೆಯುತ್ತವೆ. ಇದರಿಂದ ನೋಡಬಾರದ್ದನ್ನು ನೋಡುವುದು, ಆಡಬಾರದ್ದನ್ನು ಆಡುವುದನ್ನು ನಾವು ಮಾಡುತ್ತೇವೆ. ಇಂತಹ ಇಂದ್ರಿಯನಿಗ್ರಹ ದಮಾಃ. ಇಂದ್ರಿಯ ನಿಗ್ರಹಕ್ಕೆ ಇರುವ ಏಕಮಾತ್ರ ಮಾರ್ಗ ಭಗವಂತನಲ್ಲಿ ಶರಣಾಗತಿ.

ಏಳನೆಯ ಗುಣ ಶಮಾಃ. ನಮ್ಮ ಮನಸ್ಸು ಶಾಂತವಾಗಿರುವುದು(to be in blissfull state) ಶಮಾಃ. ಇಂದು ನಾವೆಲ್ಲರೂ ಬದುಕುತ್ತಿರುವುದು ಅಶಾಂತಿ(Tension)ಯಿಂದಲೇ! ಇದಕ್ಕೆ ಮೂಲ ಕಾರಣ ನಾವು ನಮ್ಮ ಮನಸ್ಸನ್ನು ಲೌಕಿಕ ವಿಚಾರದಲ್ಲಿ ಕೇಂದ್ರೀಕರಿಸಿ ಸಾಗುತ್ತಿರುವುದು. ಲೌಕಿಕ ವಿಚಾರವನ್ನು ಬಿಟ್ಟು, ಮನಸ್ಸನ್ನು ಭಗವಂತನ ಕಡೆಗೆ ಹರಿಸಿದಾಗ ಮನಸ್ಸು ಹಾಯಾಗುತ್ತದೆ. ಜೀವನದಲ್ಲಿ ಸಮಸ್ಯೆ ಬಂದರೆ "ದೇವರಿದ್ದಾನೆ, ಆತ ಬಿಟ್ಟು ಹಾಕುವುದಿಲ್ಲ" ಎನ್ನುವ ದೃಢನಂಬಿಕೆ ಉಳ್ಳವ ಈ ಸ್ಥಿತಿಯನ್ನು ಗಳಿಸಬಲ್ಲ. ಒಟ್ಟಿನಲ್ಲಿ 'ನಮ್ಮ ಒಳಪ್ರಪಂಚದ ಸರ್ವಸ್ವವೂ ಭಗವಂತ ಎನ್ನುವ ಪರಿಜ್ಞಾನದಿಂದ ನಾವು ಉಪಾಸನೆ ಮಾಡಬೇಕು'-ಎನ್ನುವುದು ಇಲ್ಲಿರುವ ಮೂಲ ಸಂದೇಶ.

ಮುಂದುವರಿದು ಕೃಷ್ಣ ಹೇಳುತ್ತಾನೆ: "ಸುಖ-ದುಃಖ, ಹುಟ್ಟು-ಸಾವು, ಭಯ-ಕೆಚ್ಚು ಬಗೆ ಬಗೆಯ ಈ ಎಲ್ಲಾ ಬಗೆಗಳೂ ನನ್ನಿಂದಲೇ ಉಂಟಾಗುತ್ತವೆ" ಎಂದು. ಸುಖ-ದುಃಖ ಎನ್ನುವುದು ದ್ವಂದ್ವ. ಜೀವನದಲ್ಲಿ ಇವೆರಡೂ ಒಟ್ಟಿಗೆ ಇರುತ್ತವೆ ಮತ್ತು ಒಂದರ ನಂತರ ಒಂದು ಬರುತ್ತಿರುತ್ತವೆ. ಯಾರಿಗೂ ಸುಖವಿಲ್ಲದ ದುಃಖವಾಗಲೀ, ದುಃಖವಿಲ್ಲದ ಸುಖವಾಗಲೀ ಇಲ್ಲ. ಇದು ನಮ್ಮ ಜೀವನದಲ್ಲಿ ಹಗಲು-ರಾತ್ರಿ ಇದ್ದಂತೆ. ಈ ಸತ್ಯವನ್ನು ತಿಳಿದಾಗ ದುಃಖವೆನ್ನುವುದು ದುರ್ಭರವಾಗದು. ನಮ್ಮ ಜೀವನದಲ್ಲಿ ಏರಿಳಿತ ಎನ್ನುವುದು ಸಾಮಾನ್ಯ. ಹುಟ್ಟು-ಸಾವು ನೈಸರ್ಗಿಕ. ನಮ್ಮಲ್ಲಿ ಜ್ಞಾನವಿದ್ದರೆ ಅದೇ ಅಭಯ, ಇಲ್ಲದಿದ್ದರೆ ಭಯ. ಇವೆಲ್ಲವೂ ಭಗವಂತನ ಅಧೀನ.

ಈ ಶ್ಲೋಕದಲ್ಲಿ ಮನುಷ್ಯನ ಮನಸ್ಸಿನಲ್ಲಿ ಮೂಡುವ ಎಲ್ಲಾ ಭಾವನೆಗಳು-ಆ ಭಾವನೆಗಳಿಂದ ಆಗತಕ್ಕ ಎಲ್ಲಾ ಪರಿವರ್ತನೆ ಮತ್ತು ಪರಿಣಾಮಗಳು-ಎಲ್ಲದರ ಹಿಂದಿರುವ ಭಗವತ್ ಶಕ್ತಿ ಬಗ್ಗೆ ಕೃಷ್ಣ ವಿವರಿಸಿದ. ಮುಂದಿನ ಶ್ಲೋಕದಲ್ಲಿ ಕೃಷ್ಣ ನಾವು ಗಳಿಸಿಕೊಳ್ಳಬೇಕಾದ ಏಳು ಮಾನಸಿಕ ಗುಣವನ್ನು ವಿವರಿಸುತ್ತಾನೆ.

ಅಹಿಂಸಾ ಸಮತಾ ತುಷ್ಟಿಸ್ತಪೋ ದಾನಂ ಯಶೋಽಯಶಃ ।
ಭವಂತಿ ಭಾವಾ ಭೂತಾನಾಂ ಮತ್ತ ಏವ ಪೃಥಗ್ ವಿಧಾಃ ॥೫॥

ಅಹಿಂಸಾ ಸಮತಾ ತುಷ್ಟಿಃ ತಪಃ (ಅ)ದಾನಮ್ ಯಶಃ ಅಯಶಃ ।
ಭವಂತಿ ಭಾವಾಃ ಭೂತಾನಾಮ್ ಮತ್ತಃ ಏವ ಪೃಥಕ್ ವಿಧಾಃ -- ಅಹಿಂಸೆ, ಸಮದೃಷ್ಟಿ, ತೃಪ್ತಿ, ತಪಸ್ಸು, (ಅ)ದಾನ, (ಕೆಟ್ಟ)ಹೆಸರು- ಬಗೆ ಬಗೆಯ ಈ ಎಲ್ಲಾ ಬಗೆಗಳೂ ನನ್ನಿಂದಲೇ ಉಂಟಾಗುತ್ತವೆ.

ಕೃಷ್ಣ ಹೇಳುತ್ತಾನೆ: "ಅಹಿಂಸೆ, ಸಮದೃಷ್ಟಿ, ತೃಪ್ತಿ, ತಪಸ್ಸು, (ಅ)ದಾನ, ಹೆಸರು, ಕೆಟ್ಟ ಹೆಸರು" ಇವು ನನ್ನಿಂದ ಎಂದು. ಇಲ್ಲಿ ಅಹಿಂಸೆ ಮತ್ತು ಸಮದೃಷ್ಟಿ ತುಂಬಾ ವಿಶೇಷವಾದುದ್ದು. ಏಕೆಂದರೆ ಹಿಂಸೆಯೂ ಕೆಲವೊಮ್ಮೆ ಅಹಿಂಸೆಯಾಗುತ್ತದೆ ಮತ್ತು ಅಸಮಾನತೆಯೂ ಸಮಾನತೆಯಾಗುತ್ತದೆ. ಅದಕ್ಕಾಗಿ ಇದನ್ನು ಇಲ್ಲಿ ವಿಶೇಷವಾಗಿ ಪ್ರಸ್ತಾಪಿಸಿದ್ದಾನೆ ಕೃಷ್ಣ.

ಮೊದಲಿಗೆ ಅಹಿಂಸೆ: ಇನ್ನೊಬ್ಬರಿಗೆ ತೊಂದರೆಯಾಗದಂತೆ ಬದುಕುವುದು ಅಹಿಂಸೆ. ಇಲ್ಲಿ ಅಹಿಂಸೆ ಎಂದರೆ ಕೇವಲ ಶಾರೀರಿಕವಾಗಿ ಮಾತ್ರವಲ್ಲ, ಮನಸ್ಸು ಮತ್ತು ಮಾತಿನಲ್ಲೂ ನಾವು ಅಹಿಂಸೆಯನ್ನು ಸಾಧಿಸಬೇಕು. ಉದಾಹರಣೆಗೆ: ಒಬ್ಬರನ್ನು ಚುಚ್ಚು ಮಾತಿನಿಂದ ಹಂಗಿಸುವುದು, ಮಾನಸಿಕವಾಗಿ ಇನ್ನೊಬ್ಬರನ್ನು ನಿಂದಿಸುವುದು ಅಥವಾ ಶಾಪ ಹಾಕುವುದು ಕೂಡಾ ಹಿಂಸೆ. ಕೆಲವೊಮ್ಮೆ ಹಿಂಸೆಯೇ ಅಹಿಂಸೆಯಾಗುತ್ತದೆ. ಉದಾಹರಣೆಗೆ: ಒಂದು ನರಭಕ್ಷಕ ಹುಲಿಯನ್ನು ಕೊಲ್ಲುವುದರಿಂದ ಊರಿನ ಅನೇಕ ಜನರ ಪ್ರಾಣ ಉಳಿಯುವುದಾದರೆ ಅದನ್ನು ಕೊಲ್ಲುವುದು ಅಹಿಂಸೆ.[ನಾವು ಈ ರೀತಿಯ ಅಹಿಂಸೆಯನ್ನು ಕೃಷ್ಣನ ಅನೇಕ ಕೃತಿಗಳಲ್ಲಿ ಕಾಣುತ್ತೇವೆ]. ದೊಡ್ಡ ಹಿಂಸೆಯನ್ನು ತಡೆಯುವುದಕ್ಕೋಸ್ಕರ ಮಾಡುವ ಚಿಕ್ಕ ಹಿಂಸೆ-ಅಹಿಂಸೆ. ನಾವು ನಮ್ಮ ಮಾತಿನಿಂದ, ಕೃತಿಯಿಂದ ಮತ್ತು ಮನಸ್ಸಿನಿಂದ ಇನ್ನೊಬ್ಬರಿಗೆ ಹಿಂಸೆಯಾಗದಂತೆ ನಡೆದುಕೊಳ್ಳಬೇಕು.

ಎರಡನೇಯ ಗುಣ ಸಮದೃಷ್ಟಿ (ಸಮತಾಃ) : ಇಲ್ಲಿ ಸಮದೃಷ್ಟಿ ಎಂದರೆ ಎಲ್ಲರನ್ನೂ ಏಕ ರೂಪದಲ್ಲಿ ನೋಡುವುದು ಎಂದರ್ಥವಲ್ಲ. ಇದು ಯೋಗ್ಯತೆಗನುಗುಣವಾದ ಸಮದೃಷ್ಟಿ. ಉದಾಹರಣೆಗೆ: ಒಂದು ಶಾಲೆಯಲ್ಲಿ ಚೆನ್ನಾಗಿ ಓದಿ ಬರೆದ ವಿದ್ಯಾರ್ಥಿ ಹಾಗೂ ಓದದೇ ಪೋಲಿಯಾಗಿರುವ ಇನ್ನೊಬ್ಬ ವಿದ್ಯಾರ್ಥಿಗೆ ಸಮನಾದ ಅಂಕವನ್ನು ಕೊಡುವುದು ಸಮಾನತೆ ಅಲ್ಲ. ಯಾವುದೇ ದ್ವೇಷವಿಲ್ಲದೆ, ಶತ್ರು, ಮಿತ್ರ, ಸ್ಥಳೀಯ, ಪರಕೀಯ ಎನ್ನುವ ಭೇದವಿಲ್ಲದೆ, ಅವರವರ ಯೋಗ್ಯತೆಗೆ ತಕ್ಕಂತೆ ಅಂಕ ವಿತರಣೆ ಮಾಡುವುದು ಸಮಾನತೆ. ಯಾರನ್ನು ಹೇಗೆ ನೋಡಬೇಕೋ ಅವರನ್ನು ಹಾಗೇ ನೋಡುವುದು. ತಂದೆಯನ್ನು ತಂದೆಯಂತೆ, ತಾಯಿಯನ್ನು ತಾಯಿಯಂತೆ, ಗುರುವನ್ನು ಗುರುವಂತೆ. ಹೀಗೆ ಯಾರು ಸಮಾನರೋ ಅವರನ್ನು ಸಮಾನವಾಗಿ ಗೌರವಿಸುವುದು ಸಮದೃಷ್ಟಿ.

ಮೂರನೆಯ ಗುಣ ತೃಪ್ತಿ: ಮನುಷ್ಯನ ಎಲ್ಲಾ ದುಃಖಗಳಿಗೆ ಮುಖ್ಯ ಕಾರಣ ಅತೃಪ್ತಿ. ಇಂದಿನ ಸಮಾಜದಲ್ಲಿ ನಮ್ಮ ಮನೆಯಲ್ಲಿ ನಮಗೆ ಅಗತ್ಯಕ್ಕೆ ಬೇಕಾದಷ್ಟು ಇದ್ದರೂ ಕೂಡಾ ಮಾಧ್ಯಮಗಳಲ್ಲಿ ಬರುವ ಜಾಹೀರಾತಿಗೆ ಮರುಳಾಗಿ, ಅಥವಾ ನೆರಮನೆಯವರಿಗೆ ಪ್ರತಿಸ್ಪರ್ಧಿಯಾಗಿ, ಸದಾ ಅತೃಪ್ತಿಯಲ್ಲಿ ನಾವು ಬದುಕುತ್ತೇವೆ. ಕೆಲಸ ಇಲ್ಲದಾಗ ಕೆಲಸದ ಆಸೆ, ನಂತರ ಎಷ್ಟು ಸಂಬಳ ಬಂದರೂ ಅಲ್ಲಿ ಅತೃಪ್ತಿ. ಇಲ್ಲದ್ದನ್ನು ಯೋಚಿಸಿ ಕೊರಗದೇ, ಇದ್ದದ್ದನ್ನು ಯೋಚಿಸಿ ಖುಷಿ ಪಡುವುದು(**Be content with whatever you have**) ನಿಜವಾದ ತೃಪ್ತಿ.

ನಾಲ್ಕನೆಯದು ತಪಸ್ಸು: ಇದರಲ್ಲಿ ಮೂರು ಬಗೆ: ಕಾಯಾ-ವಾಚಾ-ಮನಸಾ ತಪಃ. ಕಾಯ ಅಂದರೆ ದೇಹ. ದೇಹದ ಮೂಲಕ ತಪಸ್ಸು. ಸಾಮಾನ್ಯವಾಗಿ ದೇಹ ಹೇಳಿದಂತೆ ಕೇಳದೇ ಇರುವುದು ಆಹಾರ ಅತ್ಯಯ ಅಥವಾ ವ್ಯತ್ಯಯದಿಂದ. ಆಹಾರ ನಿಯಂತ್ರಣ ಮಾಡಿದಾಗ ಮನಸ್ಸು ನಿಯಂತ್ರಣಕ್ಕೆ ಬರುತ್ತದೆ. ಮನಸ್ಸು ನಿಯಂತ್ರಣದಲ್ಲಿದ್ದರೆ ದೇಹ ಸ್ಥಿರವಾಗಿರಲು ಸಾಧ್ಯ. ಇದಕ್ಕಾಗಿ ನಾನಾ ರೀತಿಯ ನಿಯಂತ್ರಣ ಸಾಧನವಾದ ವೃತಾನುಷ್ಠಾನ ಮಾಡುವುದು. ಒಟ್ಟಿನಲ್ಲಿ ಅಹಂಕಾರ ಅಸೂಯೆ ಪಡದೆ ಬಗ್ಗುವ ಗುಣ ಬರುವುದು ದೇಹದ ತಪಸ್ಸಿನಿಂದ. ಇನ್ನೊಬ್ಬರಿಗೆ ಹಿತವೆನಿಸುವ, ಸತ್ಯವಾದ-ಸಹಜ ಮಾತನ್ನಾಡುವುದು; ಶಾಸ್ತ್ರಗಳ ಶ್ರವಣ-ಮನನ

ಮಾಡಿ, ನಂತರ ಸ್ವಪ್ರವಚನದಿಂದ ಅಭ್ಯಸಿಸಿ ಅದನ್ನು ಅರಗಿಸಿಕೊಂಡು ಇನ್ನೊಬ್ಬರಿಗೆ ಪ್ರವಚನ ಮಾಡಿ, ಮುಂದಿನ ತಲೆಮಾರಿಗೆ ಕೊಡುವುದು ವಾಚ-ತಪಃ. ಮಾನಸಿಕವಾಗಿ ಸದಾ ಆಳವಾದ ಚಿಂತನೆ ಮನಸಾ-ತಪಃ.

ಐದನೆಯದು (ಅ)ದಾನ: ದಾನ ಶಬ್ದಕ್ಕೆ ಸಂಸ್ಕೃತದಲ್ಲಿ ಎರಡು ಅರ್ಥವಿದೆ. ಒಂದು 'ಕೊಡುವುದು' ಇನ್ನೊಂದು 'ತುಂಡರಿಸುವುದು'. ಕೊಡುವುದರಿಂದ ಅದು ನಮ್ಮ ಪಾಪವನ್ನು ತುಂಡರಿಸಿದರೆ ಅದು ದಾನ. ಬದಲಿಗೆ ನಮ್ಮ ಪುಣ್ಯವನ್ನು ತುಂಡರಿಸಿದರೆ ಅದು ಅದಾನ.

ನಮಗೆ ಅನುಪಯುಕ್ತವಾದ ವಸ್ತುವನ್ನು ಸಾಗಹಾಕುವುದಕ್ಕೋಸ್ಕರ ಕೊಡುವ ದಾನ ದಾನವಲ್ಲ. ಅತೀ ಅಗತ್ಯವಾದ ವಸ್ತು ಇನ್ನೊಬ್ಬರಲ್ಲಿ ಇಲ್ಲದೇ ಅದು ನಮ್ಮಲ್ಲಿ ಇದ್ದರೆ, ನಮ್ಮಲ್ಲಿರುವುದನ್ನು ಅವರಿಗೆ ಹಂಚಿ ಅವರ ಕೊರತೆ ನೀಗಿಸುವುದು ನಿಜವಾದ ದಾನ. ಒಬ್ಬ ವ್ಯಕ್ತಿ ಒಂದು ಹೊತ್ತಿನ ಊಟಕ್ಕೇ ಗತಿ ಇಲ್ಲದೆ ಪರದಾಡುತ್ತಿರುವಾಗ ನಮ್ಮಲ್ಲಿ ಎರಡು ಹೊತ್ತಿನ ಊಟಕ್ಕಾಗುವಷ್ಟು ಧಾನ್ಯವಿದ್ದರೆ, ನಮ್ಮ ನಾಳೆಯ ಬಗ್ಗೆ ಯೋಚಿಸದೇ, ಆ ವ್ಯಕ್ತಿಗೆ ಒಂದು ಹೊತ್ತಿನ ಧಾನ್ಯವನ್ನು ದಾನ ಮಾಡುವುದು ನಿಜವಾದ ದಾನ.

ದಾನದಲ್ಲಿ ಅಶನ-ವಸನ-ಅನ್ನ ಇದನ್ನು ಯಾರಿಗೆ ಬೇಕಾದರೂ ದಾನ ಮಾಡಬಹುದು. ಇರುವುದಕ್ಕೆ ತಾಣ, ಉಡುವುದಕ್ಕೆ ಬಟ್ಟೆ, ಹಸಿದವನಿಗೆ ಅನ್ನ. ಇದನ್ನು ಕೊಡುವುದಕ್ಕೆ ಯೋಗ್ಯ-ಅಯೋಗ್ಯ ಎನ್ನುವ ನಿರ್ಬಂಧವಿಲ್ಲ. ಆದರೆ ಇತರೆ ವಸ್ತುವನ್ನು ದಾನ ಮಾಡುವಾಗ ಯಾವುದು ಯಾರಿಗೆ ಅಗತ್ಯ ಮತ್ತು ಯೋಗ್ಯ ಎಂದು ನೋಡಿ ದಾನ ಮಾಡಬೇಕು. ಪ್ರಚಾರಕ್ಕಾಗಿ ದಾನ ಮಾಡುವುದು-ಅದಾನ. ಯಾವುದೇ ಬಯಕೆ ಇಲ್ಲದೆ ನಿಷ್ಪೃಹತೆಯಿಂದ ಕರ್ತವ್ಯ ದೃಷ್ಟಿಯಿಂದ ಯೋಗ್ಯವಾದ ದೇಶದಲ್ಲಿ, ಯೋಗ್ಯವಾದ ಕಾಲದಲ್ಲಿ, ಯೋಗ್ಯವಾದ ವ್ಯಕ್ತಿಗೆ ಮಾಡುವ ದಾನ ನಿಜವಾದ ದಾನ.

ಕೊನೆಯದಾಗಿ ಕೃಷ್ಣ ಯಶಃ-ಅಯಶಃವನ್ನು ಇಲ್ಲಿ ಹೇಳಿದ್ದಾನೆ. ಇದು ತುಂಬಾ ವಿಚಿತ್ರವಾದದ್ದು. ಒಬ್ಬ ಕೆಟ್ಟದ್ದನ್ನು ಮಾಡಿ ಒಳ್ಳೆಯವನು ಎಂದು ಯಶಸ್ಸನ್ನು ಗಳಿಸಬಹುದು. ಇನ್ನೊಬ್ಬ ಜೀವಮಾನವೆಲ್ಲ ಒಳ್ಳೆಯ ಕೆಲಸ ಮಾಡಿ ಬೇಡವಾದ ಅಪವಾದ ಕೇಳಿ ದುರಂತಕ್ಕೊಳಗಾಗಬಹುದು. ಇದು ತೀರ್ಮಾನವಾಗುವುದು ನಮ್ಮ ಜೀವನದ ನಡೆಯ ಮೇಲೆ. ಇದಕ್ಕಾಗಿ ಈ ವಿಷಯದ ಬಗ್ಗೆ ತಲೆ ಕೆಡಿಸಿಕೊಳ್ಳಬಾರದು. ಅಪವಾದ ಬಂದಾಗ ಹೇಗಿರಬೇಕು ಎನ್ನುವುದನ್ನು ಕೃಷ್ಣ ತನ್ನ ಜೀವನ ಕ್ರಮದಲ್ಲಿ ನಮಗೆ ತೋರಿಸಿಕೊಟ್ಟಿದ್ದಾನೆ. ಶಮಂತಕ ಮಣಿಯನ್ನು ಕೃಷ್ಣ ಕದ್ದ ಎನ್ನುವ ಅಪವಾದ ಕೃಷ್ಣನಿಗೆ ಬಂದಾಗ ಕೃಷ್ಣನ ನಡೆ ಇದಕ್ಕೆ ಉತ್ತಮ ದೃಷ್ಟಾಂತ.

ಹೀಗೆ "ಈ ಎಲ್ಲಾ ಭಾವಗಳು ಜೀವಜಾತಕ್ಕೆ ಬರುವುದು ನನ್ನಿಂದಲೆ" ಎನ್ನುತ್ತಾನೆ ಕೃಷ್ಣ. ಯಾರಿಗೆ ಯಾವ ಕಾಲದಲ್ಲಿ ಯಾವ ಭಾವ ಬರಬೇಕು ಅನ್ನುವುದು ಭಗವಂತನ ನಿರ್ಧಾರ. ನಮ್ಮ ಮನಸ್ಸಿನ ಸ್ಥಿತಿಯ ಒಂದೊಂದು ಚಲನ-ವಲನ ಭಗವಂತನ ಅಧೀನ. ಇದು ನಾವು ನಮ್ಮ ಉಪಾಸನೆಯಲ್ಲಿ ತಿಳಿದಿರಬೇಕಾದ ಮೂಲಭೂತ ಸತ್ಯ. ಇದು ಕೃಷ್ಣ ಕೊಟ್ಟ ಮಾನಸಿಕ ಉಪಾಸನೆಯ ಅದ್ಭುತ ಚಿತ್ರಣ.

ಮಹರ್ಷಯಃ ಸಪ್ತ ಪೂರ್ವೇ ಚತ್ವಾರೋ ಮನವಸ್ತಥಾ ।
ಮದ್ಭಾವಾ ಮಾನಸಾ ಜಾತಾ ಯೇಷಾಂ ಲೋಕ ಇಮಾಃ ಪ್ರಜಾಃ ॥೬॥

ಮಹರ್ಷಯಃ ಸಪ್ತ ಪೂರ್ವೇ ಚತ್ವಾರಃ ಮನವಃ ತಥಾ ।

ಮತ್ ಭಾವಾಃ ಮಾನಸಾಃ ಜಾತಾಃ ಯೇಷಾಮ್ ಲೋಕೇ ಇಮಾಃ ಪ್ರಜಾಃ --ಮೊದಲ ಮನ್ವಂತರದ ಏಳು ಮಂದಿ ಮಹರ್ಷಿಗಳು [ಮರೀಚಿ, ಅತ್ರಿ, ಅಂಗಿರಸ್, ಪುಲಸ್ತ್ಯ, ಪುಲಹ, ಕ್ರತು, ಮತ್ತು ವಸಿಷ್ಠ ], ಮೊದಲ ನಾಲ್ವರು ಮನುಗಳು [ಸ್ವಾಯಂಭುವ, ಸ್ವಾರೋಚಿಷ, ಉತ್ತಮ ಮತ್ತು ರೈವತ], ಚತುರ್ಮುಖನ ಮಾನಸ ಪುತ್ರರಾದ ಇವರು ನನ್ನಿಂದಲೇ ಆದವರು.[ನಾಲ್ಕು ವರ್ಣಗಳ ನಿಯಾಮಕರಾಗಿ ನಾಲ್ಕು ಪಂಗಡದಲ್ಲಿ ಸೇರಿದ, ವಿಶೇಷ ಅರಿವಿನ ಕಾರಣ 'ಮನು'ಗಳೆನಿಸಿದ ಎಲ್ಲಾ ದೇವತೆಗಳು ನನ್ನಿಂದಲೇ ಆದವರು; ನನ್ನ ಇಚ್ಛೆಯಿಂದಲೇ ಹುಟ್ಟಿ ಬಂದವರು.] ವಿಶ್ವದ ಈ ಜನರೆಲ್ಲಾ ಅವರದೇ ಸಂತತಿ.

ಇಡೀ ಬ್ರಹ್ಮಾಂಡ ಸೃಷ್ಟಿ ಭಗವಂತನಿಂದಾಯಿತು ಎನ್ನುವುದು ನಮಗೆ ತಿಳಿದಿದೆ. ಇಲ್ಲಿ ಕೃಷ್ಣ ನಾವು ಉಪಾಸನೆಯಲ್ಲಿ ತಿಳಿದಿರಬೇಕಾದ ಮುಖ್ಯ ಅಂಶವನ್ನು ವಿವರಿಸುತ್ತಾನೆ. ಮೊದಲ ಮನ್ವಂತರದ ಸಪ್ತರ್ಷಿಗಳು ಮತ್ತು ಮೊದಲ ನಾಲ್ಕು ಮನುಗಳನ್ನು ಕೃಷ್ಣ ಇಲ್ಲಿ ಪ್ರಸ್ತಾಪಿಸಿದ್ದಾನೆ. ಪ್ರತಿಯೊಂದು ಮನ್ವಂತರಕ್ಕೂ ಬೇರೆ ಬೇರೆ ಸಪ್ತರ್ಷಿಗಳಿದ್ದಾರೆ. ದೇವತಾ ತಾರತಮ್ಯದಲ್ಲಿ ಹದಿನಾರನೇ ಕಕ್ಷೆಯಲ್ಲಿ ಬರುವ ಮೊದಲ ಮನ್ವಂತರದ ಈ ಸಪ್ತರ್ಷಿಗಳು ಋಷಿಮಂಡಲದಲ್ಲೇ ಬಹಳ ಶ್ರೇಷ್ಠರು. ಪುರಾಣ ಮತ್ತು ಮಹಾಭಾರತದ ಮೋಕ್ಷಧರ್ಮ ಪರ್ವವನ್ನು ನೋಡಿದಾಗ-ಇಲ್ಲಿ "ಮಹರ್ಷಯಃ ಸಪ್ತ ಪೂರ್ವೇ" ಎನ್ನುವುದು ಸೃಷ್ಟಿಕಾರಣನಾದ ಚತುರ್ಮುಖನಿಗೆ ಸಹಾಯಕರಾದ ಸಪ್ತಬ್ರಹ್ಮರನ್ನೂ ಸೂಚಿಸುತ್ತದೆ ಎಂದು ತಿಳಿಯುತ್ತದೆ. [ಇಲ್ಲಿ ಉಪಲಕ್ಷಣವಾಗಿ ಭೃಗು ಮತ್ತು ದಕ್ಷರನ್ನು ಸೇರಿಸಿಕೊಳ್ಳಬೇಕು. ಹತ್ತನೆಯವನಾದ ಮಾನಸ ಪುತ್ರ ನಾರದ ಬ್ರಹ್ಮಚಾರಿ. ಆದ್ದರಿಂದ ಸೃಷ್ಟಿ ವಿಸ್ತಾರದಲ್ಲಿ ಆತನ ಹೆಸರನ್ನು ಸೇರಿಸಿಲ್ಲ]. ಈ ಏಳುಮಂದಿ ಋಷಿಗಳು ಮತ್ತು ಭೃಗು-ದಕ್ಷರನ್ನು ಪ್ರಜಾಪತಿಗಳೆಂದು ಕರೆಯುತ್ತಾರೆ. ಭಗವಂತ ಚತುರ್ಮುಖನನ್ನು ಸೃಷ್ಟಿ ಮಾಡಿ, ಅವನ ಮೂಲಕ ಸಪ್ತರ್ಷಿಗಳನ್ನು ಸೃಷ್ಟಿ ಮಾಡಿದ. ಸೃಷ್ಟಿಯಲ್ಲಿ ಮಾನವರ ವಂಶವಿಸ್ತಾರ ಮೊದಲು ಸ್ವಾಯಂಭುವ ಮನುವಿನ ಮೂಲಕವಾಯಿತು. ಈತನಿಂದ ಮನು ವಂಶ ಬೆಳೆದುಬಂತು. ಈ ಎಲ್ಲಾ ಕಾರಣದಿಂದ ಮೊದಲ ನಾಲ್ಕು ಮನ್ವಂತರದ ಅಧಿಪತಿಗಳು ಮತ್ತು ಸಪ್ತರ್ಷಿಗಳು ಪ್ರಧಾನವಾಗಿ ಉಪಾಸನೆಯಾಗಬೇಕಾದ ಹಿಂದಿನವರು. ವಿಶ್ವದ ಈ ಜನರೆಲ್ಲಾ ಅವರದೇ ಸಂತತಿ.

'ಮನು' ಎನ್ನುವುದಕ್ಕೆ ಇನ್ನೊಂದು ಅರ್ಥವಿದೆ. ಭಗವಂತನ ಪರಿವಾರವಾದ ದೇವತೆಗಳನ್ನೂ 'ಮನುಗಳು' ಎನ್ನುತ್ತಾರೆ. ತತ್ತ್ವಾಭಿಮಾನಿ ದೇವತೆಗಳಲ್ಲಿ ಮುಖ್ಯವಾಗಿ ನಾಲ್ಕು ವಿಧ. ಇವರು ಮನುಷ್ಯನ ನಾಲ್ಕು ಸ್ವಭಾವವನ್ನು(ಬ್ರಾಹ್ಮಣ್ಯ, ಕ್ಷಾತ್ರ, ವೈಶ್ಯ, ಶೂದ್ರ) ನಿಯಂತ್ರಿಸುವ ದೇವತೆಗಳು. ನಮ್ಮಲ್ಲಿ ಪ್ರತಿಯೊಬ್ಬರಲ್ಲೂ ಈ ನಾಲ್ಕು ಸ್ವಭಾವವಿರುತ್ತದೆ. ಯಾವ ಸ್ವಭಾವ ನಮ್ಮಲ್ಲಿ ಹೆಚ್ಚಾಗಿದೆಯೋ ನಾವು ಆ ವರ್ಗದಿಂದ ಕರೆಸಿಕೊಳ್ಳುತ್ತೇವೆ. ಇದಲ್ಲದೆ 'ಮನು' ಶಬ್ದವಾಚ್ಯ ಜೀವವರ್ಗ ನಾಲ್ಕು: ಸಮಸ್ತ ದೇವತೆಗಳು, ದೇವತೆಗಳಿಂದ ಸೃಷ್ಟಿಯಾದ ಋಷಿಗಳು(ಮಾನವರು), ಋಷಿಪರಂಪರೆಯಿಂದ ಬಂದ 'ಮಾನವಮಾನವರು', ಈ ಪರಂಪರೆಯಿಂದ ಬಂದ ಮನುಷ್ಯರು. ಇದು ಉಪಾಸನೆಯಲ್ಲಿ ತಿಳಿದಿರಬೇಕಾದ ಅಂಶ.

ಏತಾಂ ವಿಭೂತಿಂ ಯೋಗಂ ಚ ಮಮ ಯೋ ವೇತ್ತಿ ತತ್ತ್ವತಃ ।

ಸೋಽವಿಕಲ್ಪೇನ ಯೋಗೇನ ಯುಜ್ಯತೇ ನಾತ್ರ ಸಂಶಯಃ ॥೭॥

ಏತಾಮ್ ವಿಭೂತಿಮ್ ಯೋಗಮ್ ಚ ಮಮ ಯಃ ವೇತ್ತಿ ತತ್ತ್ವತಃ ।
ಸಃ ಅವಿಕಲ್ಪೇನ ಯೋಗೇನ ಯುಜ್ಯತೇ ನ ಅತ್ರ ಸಂಶಯಃ --ನನ್ನ ಈ ಹಿರಿಮೆಯನ್ನು [ಸನ್ನಿಧಾನದಿಂದ ಹಿರಿಮೆಯನ್ನೀಯುವ ನನ್ನ ರೂಪಗಳ ಬಗೆಯನ್ನು] ಮತ್ತು ಆಳವನ್ನು ಸರಿಯಾಗಿ ತಿಳಿದವನು ಪರಿಶುದ್ಧವಾದ ಧ್ಯಾನಯೋಗದಲ್ಲಿ ನೆಲೆಗೊಳ್ಳುತ್ತಾನೆ. ಇದರಲ್ಲಿ ಸಂದೇಹವಿಲ್ಲ.

ಭಗವಂತನ ಹಿರಿಮೆಯನ್ನು, ಆತನ ವಿವಿಧ ರೂಪವನ್ನು, ಅದರ ಆಳವನ್ನು-ಯಥಾರ್ಥವಾಗಿ ತಿಳಿದರೆ ನಮಗೆ ಸಹಜವಾಗಿ ಶರಣಾಗತಿ ಬರುತ್ತದೆ. ಭಗವಂತನ ಬಗೆಗಿನ ಜ್ಞಾನ ನಮ್ಮಲ್ಲಿ ದೃಢನಂಬಿಕೆಯನ್ನು ಹುಟ್ಟಿಸುತ್ತದೆ. ಶ್ರದ್ಧೆ ಮತ್ತು ಭಕ್ತಿಯಿಂದ ತುಂಬಿದ ಮನಸ್ಸು ಭಗವಂತನಲ್ಲಿ ನೆಲೆನಿಲ್ಲುತ್ತದೆ.

ಅಹಂ ಸರ್ವಸ್ಯ ಪ್ರಭವೋ ಮತ್ತಃ ಸರ್ವಂ ಪ್ರವರ್ತತೇ ।
ಇತಿ ಮತ್ವಾ ಭಜಂತೇ ಮಾಂ ಬುಧಾ ಭಾವಸಮನ್ವಿತಾಃ ॥೮॥

ಅಹಮ್ ಸರ್ವಸ್ಯ ಪ್ರಭವಃ ಮತ್ತಃ ಸರ್ವಮ್ ಪ್ರವರ್ತತೇ ।
ಇತಿ ಮತ್ವಾ ಭಜಂತೇ ಮಾಮ್ ಬುಧಾಃ ಭಾವ ಸಮನ್ವಿತಾಃ --ತಿಳಿದವರು 'ನಾನು ಎಲ್ಲದರ ಮೂಲಕಾರಣ, ನನ್ನಿಂದಲೇ ಎಲ್ಲವೂ ನಡೆಯುತ್ತಿದೆ' ಎಂದರಿತು ಭಕ್ತಿಯಿಂದ ನನ್ನನ್ನು ಸೇವಿಸುತ್ತಾರೆ.

ಜ್ಞಾನಿಗಳು 'ಎಲ್ಲದರ ನಿಯಾಮಕ ಭಗವಂತ, ಎಲ್ಲವೂ ಭಗವಂತನಿಂದ ಸೃಷ್ಟಿಯಾಗಿದೆ, ಎಲ್ಲವೂ ಭಗವಂತನಿಂದ ನಿಯತವಾಗಿದೆ' ಎನ್ನುವ ಸತ್ಯವನ್ನು ಅರಿತು ಭಕ್ತಿಯಿಂದ ಉಪಾಸನೆ ಮಾಡುತ್ತಾರೆ. "ಈ ರೀತಿ ಭಗವಂತನ ಬಗೆಗೆ ಅನನ್ಯ ಭಕ್ತಿ ಮತ್ತು ಸರ್ವೋತ್ತಮ ಜ್ಞಾನವುಳ್ಳವರು: ತಮ್ಮೆಲ್ಲಾ ಮನಸ್ಸಿನ ಪ್ರಪಂಚ ನನ್ನ ಅಧೀನ, ಎಲ್ಲಕ್ಕೂ ಕಾರಣ ನಾನು, ಎಲ್ಲವೂ ಹುಟ್ಟಿದ್ದು ನನ್ನಿಂದ, ಎಲ್ಲವೂ ನಿಯಂತ್ರಿತವಾಗುವುದು ನನ್ನಿಂದ, ಎಲ್ಲವೂ ನನ್ನ ಅಧೀನ ಎಂದು ತಿಳಿದು ಉಪಾಸನೆ ಮಾಡುತ್ತಾರೆ" ಎನ್ನುತ್ತಾನೆ ಕೃಷ್ಣ.

ಮಚ್ಚಿತ್ತಾ ಮದ್ಗತಪ್ರಾಣಾ ಬೋಧಯಂತಃ ಪರಸ್ಪರಮ್ ।
ಕಥಯಂತಶ್ಚ ಮಾಂ ನಿತ್ಯಂ ತುಷ್ಯಂತಿ ಚ ರಮಂತಿ ಚ ॥೯॥

ಮತ್ ಚಿತ್ತಾಃ ಮತ್ ಗತ ಪ್ರಾಣಾಃ ಬೋಧಯಂತಃ ಪರಸ್ಪರಮ್ ।
ಕಥಯಂತಃ ಚ ಮಾಮ್ ನಿತ್ಯಮ್ ತುಷ್ಯಂತಿ ಚ ರಮಂತಿ ಚ --ಅನುಗಾಲ ನನ್ನಲ್ಲೇ ಬಗೆಯಿಟ್ಟವರು, ನನಗಾಗಿ ಬದುಕುವವರು, ನನ್ನನ್ನೇ ಒಬ್ಬರಿಗೊಬ್ಬರು ತಿಳಿಹೇಳುತ್ತಾ, ತಿಳಿಯುತ್ತಾ ತಣಿಯುತ್ತಾರೆ; ಸಂತಸಪಡುತ್ತಾರೆ.

ಹೀಗೆ ನಿಜವಾದ ಜ್ಞಾನ ಭಕ್ತಿ ಉಳ್ಳವರ ಚಿತ್ತದಲ್ಲಿ ಸದಾ ಭಗವಂತನ ಚಿಂತನವೇ ತುಂಬಿರುತ್ತದೆ. ಅವರ ಮನಸ್ಸು ಭಗವನ್ಮಯವಾಗಿ ಬಿಡುತ್ತದೆ. ಅವರಿಗೆ ಎಲ್ಲವುದರಲ್ಲೂ ಭಗವಂತನೇ ಕಾಣುತ್ತಾನೆ. ಇಂತವರು ಪ್ರತೀ ಘಟನೆಯ ಹಿಂದೆ ಭಗವಂತನಿದ್ದಾನೆ, ಅವನ ಇಚ್ಛೆಯಂತೆ ಎಲ್ಲವೂ ನೆಡೆಯತ್ತಿದೆ ಎನ್ನುವ ಅರಿವಿನಲ್ಲಿ ಬದುಕುತ್ತಾರೆ. ಇವರ ಮನಸ್ಸು ಭಗವಂತನೊಂದಿಗೆ ಶ್ರುತಿಗೂಡಿರುತ್ತದೆ. ಇವರು ಸದಾ ಭಗವಂತನ ಬಗೆಗೆ ಮಾತನಾಡುತ್ತಿರುತ್ತಾರೆ. ಒಂದೊಂದು ಸಂಗತಿಯಲ್ಲೂ 'ಭಗವಂತನ ಸೃಷ್ಟಿ ಎಷ್ಟು ಅದ್ಭುತ' ಎನ್ನುವಂತೆ ಇವರು ವಿಶ್ಲೇಷಣೆ ಮಾಡುತ್ತಾರೆ. ತಮ್ಮ ಜೀವನದ ಪ್ರತಿಯೊಂದು ಘಟನೆಯನ್ನೂ ಇವರು ಭಗವಂತನ ಪ್ರಸಾದ ಎನ್ನುವಂತೆ ಸ್ವೀಕರಿಸುತ್ತಾರೆ. ಇಂತವರ ಜೀವನ ಆನಂದಮಯವಾಗಿರುತ್ತದೆ. ಇವರಲ್ಲಿ ಕೆಟ್ಟ ಯೋಚನೆ ಸುಳಿಯುವುದಿಲ್ಲ. ಇವರ ಮನಸ್ಸು ಸದಾ ನಿರ್ಮಲವಾಗಿರುತ್ತದೆ. ಇವರು ಲೋಕ ವ್ಯವಹಾರದ ಮಾತನ್ನು ಬಿಟ್ಟು, ಭಗವಂತನ ವಿಚಾರ ಮಾತನಾಡುತ್ತಾ ಸದಾ ಆನಂದಪಡುತ್ತಿರುತ್ತಾರೆ.

ತೇಷಾಂ ಸತತಯುಕ್ತಾನಾಂ ಭಜತಾಂ ಪ್ರೀತಿಪೂರ್ವಕಮ್ ।
ದದಾಮಿ ಬುದ್ಧಿಯೋಗಂ ತಂ ಯೇನ ಮಾಮುಪಯಾಂತಿ ತೇ ॥೧೦॥

ತೇಷಾಮ್ ಸತತ ಯುಕ್ತಾನಾಮ್ ಭಜತಾಮ್ ಪ್ರೀತಿ ಪೂರ್ವಕಮ್ ।
ದದಾಮಿ ಬುದ್ಧಿಯೋಗಮ್ ತಮ್ ಯೇನ ಮಾಮ್ ಉಪಯಾಂತಿ ತೇ –ನನ್ನಲ್ಲೇ ಅನುಗಾಲ ಬಗೆಯಿಟ್ಟು ಪ್ರೀತಿಯಿಂದ ಸೇವಿಸುವವರಿಗೆ ಆ ತಿಳಿವಿನ ದಾರಿಯನ್ನು ಕರುಣಿಸುತ್ತೇನೆ. ಅದರಿಂದ ಅವರು ನನ್ನನ್ನೇ ಸೇರುತ್ತಾರೆ.

ಈ ಶ್ಲೋಕದಲ್ಲಿ "ಸತತಯುಕ್ತಾನಾಂ" ಎನ್ನುವಲ್ಲಿ ಬರುವ 'ಯುಕ್ತಿ' ಎನ್ನುವ ಶಬ್ದಕ್ಕೆ ಸಂಸ್ಕೃತದಲ್ಲಿ ಅನೇಕ ಅರ್ಥಗಳಿವೆ. ಬಹಳ ಯೋಗ್ಯವಾದ ಆಚಾರನಿಷ್ಠೆ ಹೊಂದಿ, ದಾರಿತಪ್ಪದೆ, ಜಾರದೆ ಬದುಕುವುದು ಯುಕ್ತಿ. ಭಗವಂತನ ಅನುಸಂಧಾನಕ್ಕೆ ಪೂರಕವಾದ ವೇದಾಧ್ಯಯನವನ್ನು ಗ್ರಹಿಸುವುದು ಯುಕ್ತಿ. ಭಗವಂತನಲ್ಲಿ ಮನಸ್ಸನ್ನು ನೆಲೆಗೊಳಿಸುವುದು ಯುಕ್ತಿ. ಇಲ್ಲಿ ಕೃಷ್ಣ ಹೇಳುತ್ತಾನೆ: "ಯಾವ ಬುದ್ಧಿಯೋಗದಿಂದ ಭಗವಂತನನ್ನು ಸೇರುವುದು ಸಾಧ್ಯವೋ, ಅಂತಹ ವಿಷಯ ಚಿಂತನೆ ಮಾಡುವ ಮನಸ್ಸು, ಭಕ್ತಿಯಿಂದ ಚಿಂತನೆ ಮಾಡಬೇಕು ಎನ್ನುವ ಬುದ್ಧಿ, ನಿಶ್ಚಯವಾದ ಜ್ಞಾನವನ್ನು-ನಾನೇ ಕೊಡುತ್ತೇನೆ" ಎಂದು. ಭಗವಂತನಲ್ಲಿ ಶರಣಾಗಿ ಪ್ರೀತಿಯಿಂದ ಅವನನ್ನು ಸೇವಿಸಿದಾಗ-ಭಗವಂತನನ್ನು ಸೇರುವ ಮಾರ್ಗವನ್ನು ಭಗವಂತನೇ ತೋರಿಸುತ್ತಾನೆ.

ತೇಷಾಮೇವಾನುಕಂಪಾರ್ಥಮಹಮಜ್ಞಾನಜಂ ತಮಃ ।
ನಾಶಯಾಮ್ಯಾತ್ಮಭಾವಸ್ಥೋ ಜ್ಞಾನದೀಪೇನ ಭಾಸ್ವತಾ ॥೧೧॥

ತೇಷಾಮ್ ಏವ ಅನುಕಂಪಾರ್ಥಮ್ ಅಹಮ್ ಅಜ್ಞಾನ ಜಮ್ ತಮಃ ।

ನಾಶಯಾಮಿ ಆತ್ಮ ಭಾವ ಸ್ಥ ಜ್ಞಾನ ದೀಪೇನ ಭಾಸ್ವತಾ –ನಾನು ಅವರ ಮೇಲಣ ಕನಿಕರದಿಂದಲೇ, ಅವರ ಬಗೆಯಲ್ಲಿ ನೆಲೆನಿಂತು, ಬೆಳಗುವ ಅರಿವಿನ ಪಂಜಿನಿಂದ ಅಜ್ಞಾನದಿಂದ ಕವಿದ ಕತ್ತಲನ್ನು ಹೋಗಲಾಡಿಸುತ್ತೇನೆ.

ಭಗವಂತ ನಮ್ಮನ್ನು ಉದ್ಧರಿಸುವುದು ಯಾವುದೋ ಸ್ವಾರ್ಥಕ್ಕಾಗಿ ಅಲ್ಲ. ಬದಲಿಗೆ ನಮ್ಮ ಮೇಲಿನ ಕರುಣೆಯಿಂದ. ತನ್ನನ್ನು ಅನನ್ಯ ಭಕ್ತಿಯಿಂದ ಭಜಿಸಿ ಆರಾಧನೆ ಮಾಡುವ ಭಕ್ತನ ಮೇಲಿನ ಅನುಕಂಪದಿಂದ ಆತ ನಮ್ಮನ್ನು ಉದ್ಧರಿಸುತ್ತಾನೆ. ಆತ ನಮಗೆ ಕೇವಲ ಬುದ್ಧಿ ಕೊಡುವುದಷ್ಟೇ ಅಲ್ಲ, ನಮ್ಮ ಬುದ್ಧಿಯನ್ನು ಸದಾ ಕವಿದಿರುವ ತಮಸ್ಸಿನ(ಅಜ್ಞಾನದ) ಪೊರೆಯನ್ನು ಕಳಚುವವನೂ ಅವನೇ. ಭಗವಂತನ ಸಹಾಯವಿಲ್ಲದೆ ನಮ್ಮ ಮನಸ್ಸು-ಬುದ್ಧಿಗೆ ಕವಿದಿರುವ ಅಜ್ಞಾನದ ಪೊರೆಯನ್ನು ನಾವೇ ನೀಗಿಸಿಕೊಳ್ಳಲು ಸಾಧ್ಯವಿಲ್ಲ. ತ್ರಿಗುಣಾತೀತ ಭಗವಂತನೊಬ್ಬನೇ ಈ ಕತ್ತಲನ್ನು ಕಳೆಯಬಲ್ಲ. ಇದರಿಂದ ನಾವು ಯಥಾರ್ಥವನ್ನು ಯಥಾರ್ಥವಾಗಿ ಗ್ರಹಣ ಮಾಡಬಹುದು. ಭಗವಂತ ನಮ್ಮ ಭಾವದಲ್ಲಿ-ಭಕ್ತಿಯಲ್ಲಿ ತುಂಬಿ, ನಮ್ಮ ಸ್ವರೂಪ ಜಾಗೃತಗೊಳಿಸಿ, ಕೃಪೆಯ ದೃಷ್ಟಿ ಬೀರಿ, ಎಲ್ಲಾ ವಿಧದಿಂದ ಬೆಳಕು ನೀಡಿ, ಯಥಾರ್ಥವನ್ನು ಕಾಣುವಂತೆ ಮಾಡುತ್ತಾನೆ. ಇದಕ್ಕಾಗಿ 'ನನ್ನೊಳಗಿನ ಕತ್ತಲನ್ನು ನೀಗು ಭಗವಂತ' ಎಂದು ನಾವು ಆತನಲ್ಲಿ ಶರಣಾಗಬೇಕು. ಒಳಗೆ ಕತ್ತಲನ್ನು ಇಟ್ಟುಕೊಂಡು ಎಷ್ಟು ಅಧ್ಯಯನ ಮಾಡಿದರೂ ಉಪಯೋಗವಿಲ್ಲ. ಶಾಸ್ತ ಓದಿದಾಗ ಯಥಾರ್ಥ ತಿಳಿಯಬೇಕಾದರೆ ಭಗವಂತನಲ್ಲಿ ಶರಣಾಗತಿ ಮುಖ್ಯ.

ಈ ಹಂತದಲ್ಲಿ ಅರ್ಜುನ ಕೃಷ್ಣನ ಉಪದೇಶ ಕೇಳಿ ಮೈಮರೆತು ಹೋದ. ಆತನಿಗೆ ತಾನು ಯುದ್ಧರಂಗದಲ್ಲಿ ನಿಂತಿದ್ದೇನೆ ಎನ್ನುವ ವಿಚಾರವೇ ಮರೆತು ಹೋಗಿ, ಕೇವಲ ಕೃಷ್ಣನೊಬ್ಬನೇ ಕಾಣಲಾರಂಭಿಸುತ್ತಾನೆ. ಮುಂದಿನ ನಾಲ್ಕು ಶ್ಲೋಕದಲ್ಲಿ ಅರ್ಜುನ ಭಗವಂತನ ಅನಂತ ಶಕ್ತಿಯ ಪಾರಮ್ಯದ ಅನುಸಂಧಾನವನ್ನು ವ್ಯಕ್ತಪಡಿಸುವುದನ್ನು ಕಾಣುತ್ತೇವೆ.

ಅರ್ಜುನಃ ಉವಾಚ ।

ಪರಂ ಬ್ರಹ್ಮ ಪರಂ ಧಾಮ ಪವಿತ್ರಂ ಪರಮಂ ಭವಾನ್।
ಪುರುಷಂ ಶಾಶ್ವತಂ ದಿವ್ಯಮಾದಿದೇವಮಜಂ ವಿಭುಮ್ ॥೧೨॥

ಆಹುಸ್ತ್ವಾ ಮೃಷಯಃ ಸರ್ವೇ ದೇವರ್ಷಿರ್ನಾರದಸ್ತಥಾ ।
ಅಸಿತೋ ದೇವಲೋ ವ್ಯಾಸಃ ಸ್ವಯಂ ಚೈವ ಬ್ರವೀಷಿ ಮೇ ॥೧೩॥

ಅರ್ಜುನಃ ಉವಾಚ--ಅರ್ಜುನನು ಹೇಳಿದನು:
ಪರಮ್ ಬ್ರಹ್ಮ ಪರಮ್ ಧಾಮ ಪವಿತ್ರಮ್ ಪರಮಮ್ ಭವಾನ್ ।
ಪುರುಷಮ್ ಶಾಶ್ವತಮ್ ದಿವ್ಯಮ್ ಆದಿ ದೇವಮ್ ಅಜಮ್ ವಿಭುಮ್ ॥
ಆಹುಃ ತ್ವಾಮ್ ಋಷಯಃ ಸರ್ವೇ ದೇವ ಋಷಿಃ ನಾರದಃ ತಥಾ ।

ಅಸಿತಃ ದೇವಲಃ ವ್ಯಾಸಃ ಸ್ವಯಂ ಚ ಏವ ಬ್ರವೀಷಿ ಮೇ -- ಪೂಜ್ಯನಾದ ನೀನು ಹಿರಿದಕ್ಕಿಂತ ಹಿರಿಯ ತತ್ವ. ಹಿರಿಯ ಆಸರೆ. ಪಾವನಗಳಿಗೂ ಪಾವನ. ನಿನ್ನನ್ನು ಗುಣಪೂರ್ಣನಾದ, ಪರಮಪುರುಷನೆಂದು, ಬದಲಾಗದವನೆಂದು, ಲೀಲಾಮಯನೆಂದು, ಎಲ್ಲಾ ದೇವತೆಗಳಿಗೂ ಮೊದಲಿಗನೆಂದು, ಜನ್ಮರಹಿತನೆಂದು, ಬಗೆಬಗೆಯ ರೂಪಗಳಿಂದ ಎಲ್ಲೆಡೆ ತುಂಬಿರುವವನೆಂದು ಬಲ್ಲವರೆಲ್ಲ ಹೊಗಳುತ್ತಾರೆ. ದೇವರ್ಷಿ ನಾರದ ಕೂಡಾ. ಅಸಿತ-ದೇವಲರು ಕೂಡಾ. ವ್ಯಾಸ ಮುನಿ ಹೇಳಿದ್ದುಂಟು. ಸ್ವತಃ ನೀನೂ ನನಗೆ ಹೇಳುತ್ತಿದ್ದೀಯಾ.

ಇಲ್ಲಿ ಅರ್ಜುನ ಕೃಷ್ಣನನ್ನು "ಪರಂಬ್ರಹ್ಮ, ಪರಂಧಾಮ, ಪರಮಪವಿತ್ರ ನೀನು" ಎಂದು ಸಂಬೋಧಿಸುತ್ತಾನೆ. ಯಾವುದು ಎಲ್ಲವುದಕ್ಕಿಂತ ದೊಡ್ಡದೋ ಅದು ಬ್ರಹ್ಮ. ಬ್ರಹ್ಮ ಅನ್ನುವ ಪದವನ್ನು ಇನ್ನೂ ಅನೇಕ ಅರ್ಥದಲ್ಲಿ ಬಳಸುತ್ತಾರೆ. ಅದಕ್ಕಾಗಿ ಇಲ್ಲಿ ಸ್ಪಷ್ಟತೆಗಾಗಿ 'ಪರಂಬ್ರಹ್ಮ' ಎಂದಿದ್ದಾರೆ. "ಎಲ್ಲಕ್ಕಿಂತ ದೊಡ್ಡವ ಮತ್ತು ನಂಬಿದವರನ್ನು ಎತ್ತರಕ್ಕೇರಿಸುವ ನೀನು ಪರಿಪೂರ್ಣ. ನಾನು ನನ್ನ ವ್ಯಕ್ತಿತ್ವದ ಪೂರ್ಣತೆಯನ್ನು ಕಾಣಲು ನಿನ್ನ ಅನುಗ್ರಹ ಬೇಕು" ಎನ್ನುವ ಧ್ವನಿ ಈ ಸಂಬೋಧನೆಯಲ್ಲಿದೆ. ಇನ್ನು ಪರಂ ಧಾಮ: 'ಧಾಮ' ಅಂದರೆ ಆಶ್ರಯ. ಭಗವಂತನನ್ನು ಆಶ್ರಯಿಸದೇ ಇರುವ ಒಂದು ವಸ್ತು ಈ ಜಗತ್ತಿನಲ್ಲಿಲ್ಲ. "ನೀನು ಸರ್ವಸ್ವತಂತ್ರ, ಮತ್ತು ನಾವೆಲ್ಲರೂ ನಿನ್ನ ಅಧೀನ, ನೀನು ಆಶ್ರಯಧಾತ ಮತ್ತು ನಾವು ಆಶ್ರಿತರು" ಎನ್ನುವ ಅರ್ಥದಲ್ಲಿ ಅರ್ಜುನ ಕೃಷ್ಣನನ್ನು 'ಪರಂಧಾಮ' ಎಂದಿದ್ದಾನೆ. ತತ್ತ್ವಾಭಿಮಾನಿ ದೇವತೆಗಳು ಒಂದೊಂದು ರೂಪದಲ್ಲಿ ನಮಗೆ ಆಶ್ರಯ ನೀಡುತ್ತಾರೆ. ಆದರೆ ಇಂತಹ ದೇವತೆಗಳಿಗೂ ಆಶ್ರಯಧಾತನಾಗಿರುವ ಭಗವಂತ ಪರಂಧಾಮ. ಸಮಸ್ತ ಜೀವರ ಅನಂತ ಯಾತ್ರೆಯಲ್ಲಿ ಆಶ್ರಯಧಾತನಾಗಿ ಉದ್ಧಾರ ಮಾಡುವ ಭಗವಂತ ಸರ್ವಾಶ್ರಯಧಾತ.

ಭಗವಂತ 'ಪರಮಪವಿತ್ರ'. ಇಂತಹ ಭಗವಂತನನ್ನು ನಾವು ಪವಿತ್ರತೆಯ ಪ್ರತೀಕವಾದ ಅಗ್ನಿ ಮುಖೇನ ಉಪಾಸನೆ ಮಾಡುತ್ತೇವೆ. ಅಗ್ನಿ ಸ್ವಯಂ ಪವಿತ್ರ ಮತ್ತು ಅದು ಎಂದೂ ಕೊಳಕಾಗುವುದಿಲ್ಲ. ಅಗ್ನಿ ತನ್ನ ಸ್ಪರ್ಶಕ್ಕೆ ಬಂದ ವಸ್ತುವನ್ನು ಕೊಳೆರಹಿತ ಮಾಡುತ್ತದೆ. ಭಗವಂತ ನಮ್ಮನ್ನು ಮತ್ತು ಪ್ರಪಂಚವನ್ನು ಪಾವನಗೊಳಿಸುವ ಪರಮಶಕ್ತಿ.

ಅರ್ಜುನ ಇಲ್ಲಿ ತನ್ನೆಲ್ಲಾ ಭೌತಿಕ ಸಂಬಂಧವನ್ನು ಮೀರಿ ತನ್ನೆದುರು ನಿಂತಿರುವ ಆ ಪರಬ್ರಹ್ಮನನ್ನು ಕಾಣುತ್ತಿದ್ದಾನೆ. "ನನ್ನಲ್ಲಿ ಕೊಳೆ ತುಂಬಿದೆ, ಅಸೂಯೆ ಅಸಹನೆ ತುಂಬಿದೆ. ನಿನ್ನ ಅನುಗ್ರಹದಿಂದ, ಆಶ್ರಯದಿಂದ ನಾನು ಪವಿತ್ರನಾಗಬೇಕು. ನಿನ್ನಿಂದ ನಾನು ಆ ಎತ್ತರಕ್ಕೇರಿ ನನ್ನ ಪೂರ್ಣತೆಯನ್ನು ಪಡೆಯಬೇಕು" ಎನ್ನುವ ಬಯಕೆ ಅರ್ಜುನನ ಈ ಸಂಬೋಧನೆಯಲ್ಲಿದೆ.

ಕೆಲವೊಮ್ಮೆ ನಾವು ಉದ್ವೇಗದಿಂದ ಅತಿಶಯವಾಗಿ ಮಾತನಾಡುತ್ತೇವೆ. ಇಲ್ಲಿ ಅರ್ಜುನ ತಾನು ಉದ್ವೇಗದಿಂದ ಮಾತನಾಡುತ್ತಿಲ್ಲ ಎನ್ನುವುದನ್ನು ಖಚಿತಪಡಿಸಿಕೊಳ್ಳುತ್ತಾನೆ. ಒಬ್ಬ ಸಾಧಕನಿಗೆ ದೇವರ ಉಪಾಸನೆಯಲ್ಲಿ ಇದು ಬಹಳ ಮುಖ್ಯ ಅಂಶ. ಏಕೆಂದರೆ ನಾವು ದೇವರ ಬಗ್ಗೆ ಏನು ಕಲ್ಪನೆ ಮಾಡಿದರೂ ಅದು ಕೇವಲ ಕಲ್ಪನೆ ಹೊರತು ಸಾಕ್ಷಾತ್ಕಾರವಲ್ಲ. ನಮ್ಮ ಕಲ್ಪನೆ ನಮ್ಮ ಮನಸ್ಸಿನ ಸ್ಥಿತಿಯನ್ನು ಹೊಂದಿಕೊಂಡಿರುತ್ತದೆ. ಮನಸ್ಸಿನಲ್ಲಿ ಉತ್ಸಾಹ ಇದ್ದಾಗ ಏನೇನೋ ಹೊಸ-ಹೊಸ ಕಲ್ಪನೆಗಳು ಬರುತ್ತವೆ. ಅವೆಲ್ಲವೂ ಸತ್ಯವಾಗಿರಬೇಕೆಂದಿಲ್ಲ. ಹಾಗಾಗಿ ಅವರವರ ಬುದ್ಧಿ ಮಟ್ಟಕ್ಕೆ ತಕ್ಕಂತೆ ಅವರವರ ಕಲ್ಪನೆಯೇ ಹೊರತು ಭಗವಂತ ಹೇಗಿದ್ದಾನೋ ಹಾಗೇ ನಮ್ಮ ಕಲ್ಪನೆ ಇರುವುದಿಲ್ಲ. ಈ ಕಾರಣದಿಂದ ಇಲ್ಲಿ ಅರ್ಜುನ ತನಗೆ ಬಂದ ವಿಚಾರ ತನ್ನ ಬುದ್ಧಿಮಟ್ಟದ ಕಲ್ಪನೆಯಲ್ಲ

ಇದು ವಸ್ತುಸ್ಥಿತಿ ಎನ್ನುವುದನ್ನು ಖಚಿತಪಡಿಸಿಕೊಳ್ಳುತ್ತಾನೆ. ಆತ ಋಷಿಗಳು, ದೇವರ್ಷಿನಾರದರು ಹೇಳಿರುವ ಮಾತನ್ನು ಇಲ್ಲಿ ನೆನಪಿಸಿಕೊಳ್ಳುತ್ತಾನೆ.

ಅರ್ಜುನ ಹೇಳುತ್ತಾನೆ "ನಿನ್ನನ್ನು ಪುರುಷಃ, ಶಾಶ್ವತಃ, ದಿವ್ಯಃ, ಆದಿದೇವಃ ಅಜಃ , ವಿಭುಃ ಎಂದು ಈ ಮಹಾತ್ಮರು ಹೇಳಿದ್ದಾರೆ" ಎಂದು. ಇಲ್ಲಿ ಬಳಸಿರುವ ಒಂದೊಂದು ಪದದಲ್ಲಿ ಭಗವಂತನ ಅನಂತ ಗುಣ ಅಡಗಿದೆ. ವಿಷ್ಣುಸಹಸ್ರನಾಮದಲ್ಲಿ ಈ ಎಲ್ಲಾ ಪದಗಳನ್ನು ಭಗವಂತನ ನಾಮವಾಗಿ ನಾವು ಕಾಣುತ್ತೇವೆ. ಬನ್ನಿ, ಇಲ್ಲಿ ಸಂಕ್ಷಿಪ್ತವಾಗಿ ಈ ಪದಗಳ ಅರ್ಥಾನುಸಂಧಾನ ಮಾಡೋಣ:

ಪುರುಷಃ : ಇಲ್ಲಿ ಪುರುಷ ಎಂದರೆ ಗಂಡಸು ಎನ್ನುವ ಅರ್ಥವಲ್ಲ. ಪುರದಲ್ಲಿ ವಾಸಿಸುವವನು 'ಪುರುಷಃ'. ಸಮಸ್ತ ವೇದಗಳ ಸಾರಭೂತವಾದ ಸೂಕ್ತಗಳ ರಾಜ 'ಪುರುಷಸೂಕ್ತ' ಭಗವಂತನನ್ನು 'ಸಹಸ್ರ ಶೀರ್ಷಾ ಪುರುಷಃ' ಎಂದು ಕರೆದಿದೆ. ಸೃಷ್ಟಿ ಕಾಲದಲ್ಲಿ ಏನೂ ಇಲ್ಲದಾಗಲೂ ಇದ್ದು, ಈ ಸೃಷ್ಟಿಯನ್ನು ನಿರ್ಮಾಣ ಮಾಡಿದ ಭಗವಂತ ಪುರಾ+ಷಃ. ಪ್ರಳಯ ಕಾಲದಲ್ಲಿ ಎಲ್ಲವನ್ನೂ ಸುಟ್ಟ ಭಗವಂತ ಪುರ-ಉಷ. ಪ್ರಪಂಚದಲ್ಲಿ ಅನಂತವಾಗಿ, ಅನಂತ ಕಾಲ, ಅನಂತ ಸಾಮರ್ಥ್ಯ, ಅನಂತ ಗುಣಗಳಿಂದ ತುಂಬಿರುವ ಭಗವಂತ ಪುರ-ಸಹ. ಪ್ರಳಯ ಕಾಲದಲ್ಲಿ ಏನೂ ಇಲ್ಲದಾಗ ಇದ್ದು, ಸೃಷ್ಟಿ ಕಾಲದಲ್ಲಿ ತನ್ನ ನಾಭಿಯಿಂದ ಒಂದೊಂದನ್ನು ಸೃಷ್ಟಿ ಮಾಡಿದ ಭಗವಂತ, ಮೊದಲು "ಮಹತತ್ವವನ್ನು" ಸೃಷ್ಟಿ ಮಾಡಿದ. ಮಹತತ್ವ ಎಂದರೆ ಇಡೀ ಪ್ರಪಂಚದ ಭೂತಪ್ರಜ್ಞೆ ಜಾಗೃತಿ. ಹಿಂದೆ ಇದ್ದ ಸಮಸ್ತ ಸೃಷ್ಟಿಯ ಸ್ಮರಣೆಯನ್ನು ಚಿತ್ತಾಭಿಮಾನಿ ಬ್ರಹ್ಮ-ವಾಯುವಿಗೆ ಕೊಟ್ಟು, ಸೂಕ್ಷ್ಮ ರೂಪದ ಪ್ರಪಂಚ ನಿರ್ಮಾಣ. ನಂತರ ದೇವತೆಗಳು, ಪಂಚಭೂತಗಳ ನಿರ್ಮಾಣ. ಹೀಗೆ ನಿರ್ಮಾಣವಾದ ಸ್ಥೂಲ ಬ್ರಹ್ಮಾಂಡದೊಳಗೆ ಭಗವಂತ ತುಂಬಿಕೊಂಡ. ಒಂದೊಂದು ಪಿಂಡಾಂಡದೊಳಗೆ ಒಂದೊಂದು ರೂಪದಲ್ಲಿ ಬಿಂಬ ರೂಪನಾಗಿ ತುಂಬಿ ಆ ಪಿಂಡಾಂಡದಿಂದ ಮಾಡಿಸಬೇಕಾದ ಕಾರ್ಯವನ್ನು ಮಾಡಿಸಿ, ಮೋಕ್ಷವನ್ನು ಕರುಣಿಸುವ ಭಗವಂತ ಪುರುಷಃ. ಹೀಗೆ ಸೃಷ್ಟಿಯ ಮೊದಲು, ಸೃಷ್ಟಿಯ ಕಾಲದಲ್ಲಿ, ಸೃಷ್ಟಿಯಾದ ವಸ್ತುವಿನೊಳಗೆ, ಸೃಷ್ಟಿಯ ಸಾಧನೆಯಲ್ಲಿ, ಸಾಧನೆಯಿಂದ ಮುಕ್ತಿಯ ತನಕ ಎಲ್ಲೆಡೆ ಇರುವ ಈ ಹೃತ್ಕಮಲ ಮಧ್ಯ ನಿವಾಸಿ ಭಗವಂತ, ಪೂರ್ಣವಾದ ಷಡ್ಗುಣಗಳಿಂದ ತುಂಬಿರುವ ಜ್ಞಾನಾನಂದ ಸ್ವರೂಪ. ಪು+ರು+ಷಃ=ಪುರುಷಃ; ಇಲ್ಲಿ 'ಪು' ಎಂದರೆ ನಮ್ಮನ್ನು ಪಾವನಗೊಳಿಸುವ ಪರಮಪವಿತ್ರ. 'ರು' ಎಂದರೆ 'ರುವಂತಿ', ಪ್ರಪಂಚದ ಎಲ್ಲಾ ಶಬ್ದಗಳಿಂದ ವಾಚ್ಯನಾದವನು. 'ಷಃ' ಅಥವಾ 'ಸಹ' ಎಂದರೆ ಎಲ್ಲಾ ವಸ್ತುಗಳೊಳಗೆ ತುಂಬಿರುವ ಸರ್ವಾಂತರ್ಯಾಮಿ ತತ್ತ್ವ. ಹೀಗೆ ಪುರುಷಃ ಎನ್ನುವ ಭಗವಂತನ ನಾಮ ಅನೇಕ ರೀತಿಯಲ್ಲಿ ಭಗವಂತನ ಗುಣಾನುಸಂಧಾನ ಮಾಡುವ ನಾಮ.

ಶಾಶ್ವತಃ: ಅನಾದಿ ಅನಂತ ಕಾಲದಲ್ಲಿ ಯಾವುದೇ ಬದಲಾವಣೆಗೆ ಒಳಪಡದೆ, ಎಂದೆಂದೂ ಶಾಶ್ವತವಾಗಿರುವ ಆನಂದಸ್ವರೂಪ ಭಗವಂತ ಶಾಶ್ವತಃ .

ದಿವ್ಯಃ : ದಿವ್ಯ ಪದಕ್ಕೆ ಅನೇಕ ಅರ್ಥಗಳಿವೆ. ಮೂಲವಾಗಿ ದಿವ್ಯ ಅಥವಾ 'ದೇವರು' ಈ ಪದಗಳು 'ದಿವು' ಎನ್ನುವ ಧಾತುವಿನಿಂದ ಬಂದಿರುವುದು. ಪ್ರಾಚೀನ ಧಾತು ಪಾಠದಲ್ಲಿ ಈ ಧಾತುವಿಗೆ ಏಳು ಅರ್ಥವನ್ನು ನೋಡಬಹುದು; ಅವುಗಳೆಂದರೆ: ೧) ಧ್ಯುತಿ ೨) ವಿಜಿಗೀಶ ೩) ಕಾಂತಿ ೪) ಸ್ತುತಿ ೫) ವ್ಯವಹಾರ ೬) ಕ್ರೀಡಾ ೭) ಗತಿಶು.

೧) ಧ್ಯುತಿ : ಧ್ಯುತಿ ಅಂದರೆ ಬೆಳಕಿನ ಸ್ವರೂಪ. ಬೆಳಕಿನ ಪುಂಜವಾದ ಸೂರ್ಯ ಚಂದ್ರಾದಿಗಳಿಗೆ ಬೆಳಕನ್ನೀಯುವ ಭಗವಂತ ನಮ್ಮೊಳಗೆ ಜ್ಞಾನದ ಬೆಳಕನ್ನು ತುಂಬುತ್ತಾನೆ.

೨) ವಿಜಿಗೀಶ: ಭಗವಂತ ಎಲ್ಲರಿಗಿಂತ ಎತ್ತರದಲ್ಲಿರುವವನು ಹಾಗೂ ಗೆಲುವಿನ ಸ್ವರೂಪ.

೩) ಕಾಂತಿ: ಕೇವಲ ಇಚ್ಛೆಯಿಂದ ಸೃಷ್ಟಿ ಮಾಡಬಲ್ಲವ. ನಮಗೆ ಇಚ್ಛೆಯನ್ನು ಕೊಟ್ಟವ ಹಾಗೂ ಅದನ್ನು ಅವರವರ ಯೋಗ್ಯತೆಗೆ ತಕ್ಕಂತೆ ಪೂರೈಸುವವ.

೪) ಸ್ತುತಿ: ಎಲ್ಲರಿಂದ ಸ್ತುತನಾದವನು; ಎಲ್ಲರೂ ಯಾರನ್ನು ಸ್ತುತಿಸುತ್ತಾರೋ ಅವನು ಸರ್ವಶಬ್ದ ವಾಚ್ಯನಾದ ಭಗವಂತ.

೫) ವ್ಯವಹಾರ: ಜಗತ್ತಿನ ಸಮಸ್ತ ವ್ಯವಹಾರವನ್ನು ನಿರ್ವಹಿಸುವವ.

೬) ಕ್ರೀಡಾ: ಸೃಷ್ಟಿ-ಸ್ಥಿತಿ-ಸಂಹಾರ ಇದು ಭಗವಂತನಿಗೊಂದು ಕ್ರೀಡೆ.

೭) ಗತಿಶು: ಚಲನೆ ಮತ್ತು ಜ್ಞಾನ ಕೊಟ್ಟವ. ಯಾರು ಎಲ್ಲಾ ಕಡೆ ಗತನಾಗಿದ್ದಾನೋ; ಎಲ್ಲವನ್ನೂ ತಿಳಿದಿದ್ದಾನೋ; ಎಲ್ಲರೊಳಗೆ ಬಿಂಬ ರೂಪದಲ್ಲಿ ನೆಲೆಸಿದ್ದಾನೋ ಅವನು ದಿವ್ಯ ಅಥವಾ 'ದೇವ'.

ಆದಿದೇವಃ: ಈ ಜಗತ್ತಿನ ಸೃಷ್ಟಿ-ಸ್ಥಿತಿ-ಸಂಹಾರ ಯಾರಿಗೆ ಲೀಲಾ ಮಾತ್ರವೋ ಆತ ಆದಿದೇವಃ. ಭಗವಂತ ಈ ಪ್ರಪಂಚ ಇರುವಾಗಲೂ, ಇಲ್ಲದಿರುವಾಗಲೂ ಇರುವವ. ಆತ ಎಲ್ಲಕ್ಕಿಂತ ಎತ್ತರದಲ್ಲಿರುವವನು. ಎಲ್ಲಾ ಕಾಲದಲ್ಲೂ ಜಗತ್ತಿನ ಸರ್ವ ವ್ಯವಹಾರವನ್ನು ನಡೆಸುವವ ಆತ. ಹೀಗೆ ಎಲ್ಲವುದರ ಒಳಗಿದ್ದು, ಎಲ್ಲಾ ಕ್ರಿಯೆಗಳನ್ನು ನಡೆಸುವ ಭಗವಂತ ಆದಿದೇವಃ.

ಅಜಃ: 'ನ ಜಾಯತೇ ಇತಿ ಅಜಃ'; 'ಜ' ಎಂದರೆ ಜನನ; ಅ+ಜಃ-ಅಜಃ ಎಂದರೆ ಹುಟ್ಟಿರದವನು. ಹುಟ್ಟದವನ ಹೊಕ್ಕುಳಲ್ಲಿ ಹುಟ್ಟಿದ ಚತುರ್ಮುಖನನ್ನು ಅಜ ಎನ್ನುತ್ತಾರೆ. ಇಂತಹ ಚತುರ್ಮುಖನೊಳಗೆ ಸನ್ನಿಹಿತನಾಗಿ, ಸೃಷ್ಟಿ ಮಾಡುವ ಭಗವಂತ, ತಾನು ಹುಟ್ಟದೆ, ಎಲ್ಲವನ್ನೂ ಸೃಷ್ಟಿ ಮಾಡಿ ಸಂಹಾರ ಮಾಡುವ ಅಜಃ. ಎಲ್ಲರೂ ಭಗವಂತನ ಮಕ್ಕಳು, ಆದರೆ ಆತ ಯಾರಿಗೂ ಹುಟ್ಟಿದವನಲ್ಲ. ಏಕೆಂದರೆ ಅವನಿಗೆ ಹುಟ್ಟು-ಸಾವು ಎಂಬುದಿಲ್ಲ. ಇನ್ನು ಅಜಃ ಎಂದರೆ ಎಲ್ಲಾ ಕಡೆ ವ್ಯಾಪಿಸಿರುವವನು ಕೂಡಾ ಹೌದು. ಅ+ಜ-ಅಜಃ. ಇಲ್ಲಿ 'ಅ' ಎಂದರೆ 'ಅಲ್ಲ' ಅಥವಾ ಇಲ್ಲ! ಅಂದರೆ ಅವನು ನಾವು ತಿಳಿದ ಯಾವ ವಸ್ತುವೂ ಅಲ್ಲ. ಅವನಲ್ಲಿ ಯಾವ ದೋಷವೂ ಇಲ್ಲ. ಇನ್ನೊಂದು ಅರ್ಥದಲ್ಲಿ ಅಜಃ ಅಂದರೆ ಯಾರಿಂದಲೂ ಹುಟ್ಟದವನು-ಆದರೆ ಎಲ್ಲರಲ್ಲೂ ಹುಟ್ಟುವವನು! ತದ್ವಿರುದ್ಧವಾದ ಅರ್ಥ ಎನ್ನುತೀರಾ? ಹೌದು, ಭಗವಂತ ಯಾರಿಂದಲೋ ಹುಟ್ಟಿ ಬರುವ ವಸ್ತುವಲ್ಲ. ಆದರೆ ಬಿಂಬ ರೂಪನಾಗಿ ಪ್ರತಿಯೊಂದು ಗರ್ಭದಲ್ಲಿ ನೆಲೆಸಿ ಏಕ ಕಾಲದಲ್ಲಿ ಅನೇಕ ರೂಪಿಯಾಗಿ ಆತ ಹುಟ್ಟುತ್ತಾನೆ. ಗರ್ಭಿಣಿಯ ಗರ್ಭದಲ್ಲಿ ಭಗವಂತ ಬಿಂಬರೂಪನಾಗಿ ನೆಲೆಸಿ ಜನಿಸುತ್ತಾನೆ.

ವಿಭುಃ: ವಿವಿಧ+ಭವತಿ- ಅಂದರೆ ವಿವಿಧ ರೂಪ ತೊಟ್ಟ ಅನಂತರೂಪಿ. ಸರ್ವಸಮರ್ಥನಾಗಿ ಪ್ರಪಂಚದಲ್ಲೆಲ್ಲಾ ತುಂಬಿರುವ ಭಗವಂತ ವಿಭುಃ.

ಇಲ್ಲಿ ಅರ್ಜುನ ವಿಶೇಷವಾಗಿ ದೇವರ್ಷಿ ನಾರದ, ಅಸಿತ-ದೇವಲ ಮತ್ತು ವ್ಯಾಸರ ಹೆಸರನ್ನು ಉಲ್ಲೇಖಿಸುತ್ತಾನೆ. ಏಕೆಂದರೆ ಅರ್ಜುನ ಇವರನ್ನು ಕಂಡಿದ್ದ ಮತ್ತು ಅವರು ಭಗವಂತನ ಬಗೆಗೆ ಹೇಳುವುದನ್ನು ಕೇಳಿದ್ದ. ನಾರದ ಮಹಾನ್ ಜ್ಞಾನಿ ಎನ್ನುವುದು ನಮಗೆ ತಿಳಿದಿದೆ. ದೇವತಾ ತಾರತಮ್ಯದಲ್ಲಿ ಇವರು ಹದಿನಾಲ್ಕನೇ ಮೆಟ್ಟಿಲಲ್ಲಿದ್ದಾರೆ. ಇವರು ಧರ್ಮರಾಯನ ಆಸ್ಥಾನದಲ್ಲಿ ಭಗವಂತನ ಅಗ್ರಪೂಜೆ ನಡೆದಾಗ ಬಂದು ಹರಸಿರುವ ದೇವಲೋಕದ ಋಷಿ. ನರ ಸಮುದಾಯದಲ್ಲಿರುವ ಅಜ್ಞಾನವನ್ನು ಸಂಹಾರ ಮಾಡಿ, ಭಗವಂತನ ಜ್ಞಾನವನ್ನು ಕೊಡುವ ನಾರದ, ನಮಗೆ ಸತ್ಯವನ್ನು ಹೊಳೆಸುವ ಅಂತಃಪ್ರಜ್ಞೆಯ(Intuition)ದೇವತೆ. ಆಜ್ಞಾಚಕ್ರವನ್ನು

ಜಾಗೃತಗೊಳಿಸಿದಾಗ ನಮಗೆ ನಾರದರ ದರ್ಶನವಾಗುತ್ತದೆ. ಯಾವುದನ್ನು ಮಾಡಬೇಕು, ಯಾವುದನ್ನು ಮಾಡಬಾರದು ಎನ್ನುವುದನ್ನು ಅಂತರ್ದೃಷ್ಟಿಯಿಂದ ಉತ್ತರಿಸುವವರು ನಾರದರು. ಅಸಿತ-ದೇವಲರು ಮಂತ್ರದೃಷ್ಟಾರರಾದ ವೇದಕಾಲದ ಋಷಿಗಳು. ಇವರು ಧರ್ಮರಾಯನ ಸಭೆಗೆ ಬಂದು ಆತನಿಗೆ ಧರ್ಮೋಪದೇಶ ಮಾಡಿದ್ದನ್ನು ಅರ್ಜುನ ನೋಡಿದ್ದ. ಇನ್ನು ವ್ಯಾಸರು: ವೇದವನ್ನು ವಿಭಾಗ ಮಾಡಿ, ನಮಗೆ ಹದಿನೆಂಟು ಪುರಾಣವನ್ನು, ಮಹಾಭಾರತ, ಪಂಚಮವೇದವನ್ನು ಕೊಟ್ಟ ಭಗವಂತನ ಅವತಾರ. "ಈ ಎಲ್ಲಾ ಮಹಾತ್ಮರು ಏನನ್ನು ಹೇಳಿದ್ದರೋ, ಅದನ್ನೇ ನೀನು ನನಗೆ ಹೇಳುತ್ತಿದ್ದೀಯ" ಎನ್ನುತ್ತಾನೆ ಅರ್ಜುನ. ಹೀಗೆ ತನಗಾಗುತ್ತಿರುವ ಅನುಭವ ಕೇವಲ ಭ್ರಮೆ ಅಲ್ಲ ಎನ್ನುವುದನ್ನು ಅರ್ಜುನ ಖಚಿತಪಡಿಸಿಕೊಳ್ಳುತ್ತಾನೆ.

ಸರ್ವಮೇತದೃತಂ ಮನ್ಯೇ ಯನ್ಮಾಂ ವದಸಿ ಕೇಶವ ।
ನಹಿ ತೇ ಭಗವನ್ ವ್ಯಕ್ತಿಂ ವಿದುರ್ದೇವಾ ನ ದಾನವಾಃ ॥೧೪॥

ಸರ್ವಮ್ ಏತತ್ ಋತಮ್ ಮನ್ಯೇ ಯತ್ ಮಾಮ್ ವದಸಿ ಕೇಶವ ।
ನ ಹಿ ತೇ ಭಗವನ್ ವ್ಯಕ್ತಿಮ್ ವಿದುಃ ದೇವಾಃ ನ ದಾನವಾಃ –ಓ ಕೇಶವಾ, ನೀನು ನನಗೇನು ಹೇಳಿದೆಯೋ ಅದೆಲ್ಲವೂ ನಿಜವೆಂದು ಬಲ್ಲೆ. ಓ ಭಗವಾನ್, ನೀನು ಮೂಡಿಬಂದ ಬಗೆಯನ್ನು ದೇವತೆಗಳಾಗಲೀ, ದಾನವರಾಗಲೀ ಅರಿತವರಲ್ಲ.

"ನೀನು ಹೇಳುತ್ತಿರುವುದರಲ್ಲಿ ಯಾವುದೇ ಅತಿಶಯೋಕ್ತಿ ಇಲ್ಲ ಎನ್ನುವುದನ್ನು ಬಲ್ಲೆ. ನಿನ್ನ ಅರಿವಿನ ಅಭಿವ್ಯಕ್ತಿಯನ್ನು ದೇವತೆಗಳಾಗಲೀ ದಾನವರಾಗಲೀ ತಿಳಿದಿಲ್ಲ" ಎನ್ನುತ್ತಾನೆ ಅರ್ಜುನ. ದೇವತೆಗಳಿಗೆ ಭಗವಂತನ ಗುಣಪ್ರಮಾಣವನ್ನು ಅಳೆಯಲು ಸಾಧ್ಯವಾಗಿಲ್ಲ. ದಾನವರು ಭಗವಂತನಲ್ಲಿ ದೋಷ ಹುಡುಕುವುದರಲ್ಲಿ ಯಶಸ್ವಿ ಆಗಿಲ್ಲ. ಏಕೆಂದರೆ ಭಗವಂತ ಅನಂತ ಗುಣಪೂರ್ಣ. ಆತನಲ್ಲಿ ಯಾವುದೇ ದೋಷವಿಲ್ಲ. ಆತನನ್ನು ಪೂರ್ಣ ಅರ್ಥಮಾಡಿಕೊಳ್ಳುವುದು ಅಸಾಧ್ಯ. ಭಗವಂತನ ಬಗೆಗೆ ಅವನು ಹೇಳಬೇಕೇ ಹೊರತು ಇನ್ನೊಬ್ಬರು ಅದನ್ನು ವರ್ಣಿಸಲು ಸಾಧ್ಯವಿಲ್ಲ. ಭಗವಂತನನ್ನು ಪೂರ್ಣ ತಿಳಿಯುವುದು ಹಾಗಿರಲಿ, ಆತನ ಒಂದು ಅವತಾರವನ್ನಾಗಲೀ, ಅವತಾರದಲ್ಲಿನ ಆತನ ಒಂದು ಲೀಲೆಯನ್ನು ಪೂರ್ಣ ಅರ್ಥಮಾಡಿಕೊಳ್ಳುವುದು ಕಷ್ಟ. ಕೃಷ್ಣ ತನ್ನ ಅವತಾರದಲ್ಲಿ ನಡೆದುಕೊಂಡ ರೀತಿ ನಮಗೆ ಅರ್ಥವಾಗುವುದಿಲ್ಲ. ನಮಗೆ ಅದು ವಿಚಿತ್ರ ಎನಿಸುತ್ತದೆ. ಆತನನ್ನು ಅರಿಯುವುದು ಅಷ್ಟು ಸುಲಭದ ಕೆಲಸವಲ್ಲ. ಆತನ ಒಂದೊಂದು ನಡೆಯ ಹಿಂದೆಯೂ ಒಂದೊಂದು ಸಂದೇಶವಿದೆ.

ಸ್ವಯಮೇವಾSತ್ಮನಾSSತ್ಮಾನಂ ವೇತ್ಥ ತ್ವಂ ಪುರುಷೋತ್ತಮ ।
ಭೂತಭಾವನ ಭೂತೇಶ ದೇವದೇವ ಜಗತ್ ಪತೇ ॥೧೫॥

ವಕ್ತುಮರ್ಹಸ್ಯಶೇಷೇಣ ದಿವ್ಯಾ ಹ್ಯಾತ್ಮವಿಭೂತಯಃ ।

ಯಾಭಿರ್ವಿಭೂತಿಭಿರ್ಲೋಕಾನಿಮಾಂಸ್ತ್ವಂ ವ್ಯಾಪ್ಯ ತಿಷ್ಠಸಿ ॥೧೬॥

ಸ್ವಯಮ್ ಏವ ಆತ್ಮನಾ ಆತ್ಮಾನಮ್ ವೇತ್ಥ ತ್ವಮ್ ಪುರುಷೋತ್ತಮ ।
ಭೂತಭಾವನ ಭೂತೇಶ ದೇವದೇವ ಜಗತ್ ಪತೇ ॥
ವಕ್ತುಮ್ ಅರ್ಹಸಿ ಅಶೇಷೇಣ ದಿವ್ಯಾಃ ಹಿ ಆತ್ಮ ವಿಭೂತಯಃ ।
ಯಾಭಿಃ ವಿಭೂತಿಭಿಃ ಲೋಕಾನ್ ಇಮಾನ್ ತ್ವಮ್ ವ್ಯಾಪ್ಯ ತಿಷ್ಠಸಿ –ಓ ಪುರುಷೋತ್ತಮಾ, ನೀನೇ ಸ್ವತಃ ನಿನ್ನಳವಿನಿಂದ ನಿನ್ನನ್ನು ಅರಿತಿರುವೆ. ಓ ಎಲ್ಲಾ ಜೀವಿಗಳ ಸೃಷ್ಟಾರನೇ, ಎಲ್ಲಾ ಜೀವಿಗಳ ದೊರೆಯೇ, ದೇವತೆಗಳಿಗೂ ಹಿರಿಯ ದೈವತವೇ, ಜಗದೊಡೆಯನೇ, ಯಾವ ರೂಪಗಳಿಂದ ನೀನು ಈ ಲೋಕಗಳನ್ನೆಲ್ಲಾ ತುಂಬಿ ನಿಂತಿರುವೆಯೋ ಅಂತಹ ಅಲೌಕಿಕವಾದ ನಿನ್ನ ಬಗೆಬಗೆಯ ರೂಪಗಳ ಹಿರಿಮೆಗಳನ್ನು ಬಿಡದೆ ತಿಳಿಹೇಳಬೇಕು ನೀನೇ.

ಅರ್ಜುನ ಹೇಳುತ್ತಾನೆ: "ನಿನ್ನ ಗುಣಪ್ರಮಾಣವನ್ನು ದೇವತೆಗಳಿಂದಲೂ ಅಳೆಯಲು ಸಾಧ್ಯವಿಲ್ಲ. ಆದ್ದರಿಂದ ನಿನ್ನ ಬಗೆಗೆ ತಿಳಿದಿರುವುದು ನೀನೊಬ್ಬನೇ. ಅದನ್ನು ನೀನು ನೀನಾಗಿಯೇ ಹೇಳಬೇಕು ಹೊರತು, ಇನ್ನೊಬ್ಬರಿಂದ ಹೇಳಲು ಸಾಧ್ಯವಿಲ್ಲ. ಏಕೆಂದರೆ ನೀನು ಪುರುಷೋತ್ತಮ" ಎಂದು. ಇಲ್ಲಿ ಪುರುಷೋತ್ತಮ ಎನ್ನುವ ವಿಶೇಷಣ ಬಳಕೆಯಾಗಿದೆ. ಪುರುಷೋತ್ತಮ ಎಂದರೆ ಕ್ಷರ(ಜೀವ)ವನ್ನು ಮೀರಿನಿಂತವನು. ಅಕ್ಷರ(ಶ್ರೀತತ್ವ)ಕ್ಕಿಂತಲೂ ಹಿರಿಯನು. "ಕ್ಷರ-ಅಕ್ಷರವನ್ನು ಮೀರಿ ನಿಂತ ನೀನಲ್ಲದೆ ನಿನ್ನಿಂದ ಹಿರಿದಾದ ತತ್ವ ಇನ್ನೊಂದಿಲ್ಲ. ಆದ್ದರಿಂದ ಇದರ ವಿವರಣೆಯನ್ನು ನಿನ್ನಿಂದ ತಿಳಿಯಬೇಕು" ಎನ್ನುವ ಭಾವವನ್ನು ಅರ್ಜುನ ವ್ಯಕ್ತಪಡಿಸಿದ ಎನ್ನುವುದನ್ನು ಈ ಸಂಬೋಧನೆ ತಿಳಿಸುತ್ತದೆ.

ಇಲ್ಲಿ ಅರ್ಜುನ ಕೃಷ್ಣನನ್ನು- ಭೂತಭಾವನ, ಭೂತೇಶ, ದೇವದೇವ ಮತ್ತು ಜಗತ್ ಪತೇ ಎಂದು ಸಂಬೋಧಿಸಿದ್ದಾನೆ. ಭೂತಭಾವನ ಎಂದರೆ- ಪಂಚಭೂತಾತ್ಮಕ ಪ್ರಪಂಚವನ್ನು ಸೃಷ್ಟಿ ಮಾಡಿ, ಸಮಸ್ತ ಜೀವ-ಜಾತದ ಸೃಷ್ಟಿ-ಸ್ಥಿತಿ-ಸಂಹಾರಕ್ಕೆ ಕಾರಣನಾಗಿರುವವ. ಭೂತೇಶ ಎಂದರೆ- ಎಲ್ಲರನ್ನೂ ನಿಯಂತ್ರಿಸುವ ಸರ್ವ ನಿಯಾಮಕ ಸ್ವಾಮಿ. ದೇವದೇವ ಎಂದರೆ-ಎಲ್ಲಾ ದೇವತೆಗಳಿಗೂ ದೇವನಾಗಿರುವವ; ಸೂರ್ಯಾದಿಗಳಿಗೂ ಬೆಳಕನ್ನು ಕೊಡುವ ಮೂಲ ಜ್ಯೋತಿ. ಜಗತ್ ಪತಿ ಎನ್ನುವಲ್ಲಿ 'ಪತಿ' ಎಂದರೆ ಪಾಲಕ. ಹುಟ್ಟಿಸುವವನೂ ಭಗವಂತ, ಸಾಯಿಸುವವನೂ ಭಗವಂತ. ಹುಟ್ಟು ಸಾವಿಲ್ಲದ ಮೋಕ್ಷ ಕೊಡುವವನೂ ಅವನೇ. ಆತ ಸಮಸ್ತ ಜಗತ್ತಿನ ಪಾಲಕ. ನಮಗೆ ಭಗವಂತ 'ಸಂಸಾರಬಂಧ' ಕೊಡುವುದು ಆತನ ಪಾಲನೆಯ, ಶಿಕ್ಷಣದ ಒಂದು ಮುಖ ಅಷ್ಟೇ. ಒಟ್ಟಿನಲ್ಲಿ "ನೀನಿಲ್ಲದೆ ನಾವಿಲ್ಲ, ನೀನೇ ಸರ್ವ ರಕ್ಷಕ" ಎನ್ನುವ ಭಾವವನ್ನು ಅರ್ಜುನ ಈ ಮೂಲಕ ವ್ಯಕ್ತಪಡಿಸಿದ್ದಾನೆ.

ಕಥಂ ವಿದ್ಯಾಮಹಂ ಯೋಗಿಂಸ್ತ್ವಾಂ ಸದಾ ಪರಿಚಿಂತಯನ್ ।
ಕೇಷುಕೇಷು ಚ ಭಾವೇಷು ಚಿಂತ್ಯೋಽಸಿ ಭಗವನ್ ಮಯಾ ॥೧೭॥

ಕಥಮ್ ವಿದ್ಯಾಮ್ ಅಹಮ್ ಯೋಗಿನ್ ತ್ವಾಮ್ ಸದಾ ಪರಿಚಿಂತಯನ್ ।
ಕೇಷುಕೇಷು ಚ ಭಾವೇಷು ಚಿಂತ್ಯಃ ಅಸಿ ಭಗವನ್ ಮಯಾ–ಸರ್ವಸಮರ್ಥನೆ, ನಿನ್ನನ್ನು ಅನುಗಾಲ ಹೇಗೆ ಪರಿಪರಿ ನೆನೆಯುತ್ತಾ ನಾನು ತಿಳಿಯಬಹುದು? ಓ ಭಗವನ್, ಯಾವಯಾವ ವಸ್ತುಗಳಲ್ಲಿ ಹೇಗಿರುವೆಯೆಂದು ನಾನು ನೆನೆಯಬೇಕು?

ಈ ಪ್ರಪಂಚದ ಪ್ರತಿಯೊಂದು ವಸ್ತುವಿನಲ್ಲಿರುವ ಒಂದು ವಿಶಿಷ್ಟ ಗುಣದ ಹಿಂದೆ ಭಗವಂತನ ವಿಭೂತಿ ಅಡಗಿದೆ. ಇಲ್ಲಿ ಅರ್ಜುನ ಭಗವಂತನಲ್ಲಿ ಪ್ರಾರ್ಥಿಸುತ್ತಾನೆ: "ಸರ್ವ ಸಮರ್ಥನಾದ ನೀನು ಎಲ್ಲಿ ಏನಾಗಿದ್ದಿ ಎಂದು ನಿನಗೆ ತಿಳಿದಿದೆ ಹೊರತು ನನಗಲ್ಲ. ನಾನು ಒಂದು ವಸ್ತುವನ್ನು ಕಂಡಾಗ ಅದರ ಹಿಂದಿರುವ ಭಗವತ್ ಶಕ್ತಿಯ ನೆನಪು ನನಗೆ ಬರಬೇಕು. ಯಾವಯಾವ ವಸ್ತುವಿನಲ್ಲಿ ನಿನ್ನ ಉಪಾಸನೆಯನ್ನು ನಾನು ಮಾಡಬಹುದು-ಅದನ್ನು ನಾನು ತಿಳಿಯಬೇಕು" ಎಂದು.

ವಿಸ್ತರೇಣಾऽತ್ಮನೋ ಯೋಗಂ ವಿಭೂತಿಂ ಚ ಜನಾರ್ದನ ।
ಭೂಯಃ ಕಥಯ ತೃಪ್ತಿರ್ಹಿ ಶೃಣ್ವತೋ ನಾಸ್ತಿ ಮೇऽಮೃತಮ್ ॥೧೮॥

ವಿಸ್ತರೇಣ ಆತ್ಮನಃ ಯೋಗಮ್ ವಿಭೂತಿಮ್ ಚ ಜನಾರ್ದನ ।
ಭೂಯಃ ಕಥಯ ತೃಪ್ತಿಃ ಹಿ ಶೃಣ್ವತಃ ನ ಅಸ್ತಿ ಮೇ ಅಮೃತಮ್–ಓ ಜನಾರ್ದನಾ, ನಿನ್ನ ಆಳವನ್ನೂ ಬಗೆಬಗೆಯ ರೂಪಗಳ ಹಿರಿಮೆಯನ್ನೂ ಇನ್ನಷ್ಟು ಬಿತ್ತರಿಸಿ ಹೇಳು. ನನಗೆ ಈ ಸುಧೆಯನ್ನು ಎಷ್ಟು ಸವಿದರೂ ತಣಿವಿಲ್ಲ.

"ನಿನ್ನ ವಿಭೂತಿಯನ್ನು ಇನ್ನೂ ಹೇಳು" ಎಂದು ಅರ್ಜುನ ಕೃಷ್ಣನನ್ನು ಕೇಳಿಕೊಳ್ಳುತ್ತಾನೆ. ಭಗವಂತನ ವಿಭೂತಿಯಲ್ಲಿ ಪ್ರಮುಖವಾಗಿ ನಾಲ್ಕು ವಿಧ. (೧) ಸಾಕ್ಷಾತ್ ವಿಭೂತಿ: ಇಲ್ಲಿ ಭಗವಂತ ವಿಶಿಷ್ಟ ರೂಪದಲ್ಲಿ ನಮಗೆ ಭೂಮಿಯ ಮೇಲೆ ಕಾಣಿಸಿಕೊಳ್ಳುತ್ತಾನೆ. ಉದಾಹರಣೆಗೆ: ಭಗವಂತನ ಅವತಾರಗಳು. (೨) ವಿಜಾತಿಯ ಸ್ರಷ್ಟಪ್ರಭ. ಉದಾಹರಣೆಗೆ: ನಕ್ಷತ್ರಗಳ ರಾಜ ಚಂದ್ರ. ಇಲ್ಲಿ ಚಂದ್ರ ನಕ್ಷತ್ರಗಳ ಜಾತಿಗೆ ಸೇರಿಲ್ಲ ಆದರೆ ಆತ ನಕ್ಷತ್ರಗಳ ರಾಜ. (೩)ಸ್ವಜಾತಿಯ ಸ್ರಷ್ಟಪ್ರಭ. ಉದಾಹರಣೆಗೆ: ದೇವತೆಗಳಲ್ಲಿ ಇಂದ್ರ, ಬೆಳಕಿನಲ್ಲಿ ಸೂರ್ಯ. (೪) ಸ್ವಜಾತಿಯ ಏಕದೇಶೀಯ ಸ್ರಷ್ಟಪ್ರಭ. ಉದಾಹರಣೆಗೆ: ಪಾಂಡವರಲ್ಲಿ ಅರ್ಜುನ. ಹೀಗೆ ಈ ನಾಲ್ಕು ಬಗೆಯಲ್ಲಿ ಭಗವಂತನ ವಿಭೂತಿ ರೂಪಗಳು ಅನಂತ. ಇಲ್ಲಿ ಎಲ್ಲವನ್ನೂ ನಾವು ಉಪಾಸನೆ ಮಾಡಲು ಸಾಧ್ಯವಿಲ್ಲ. ಅದಕ್ಕಾಗಿ ಅರ್ಜುನ ಉಪಾಸನೆ ಮಾಡುವುದಕ್ಕೆ ಅನುಕೂಲವಾದ "ನಿನ್ನ ವಿಭೂತಿಯನ್ನು ವಿಸ್ತಾರವಾಗಿ ಹೇಳು" ಎಂದು ಕೃಷ್ಣನಲ್ಲಿ ಕೇಳಿಕೊಳ್ಳುತ್ತಾನೆ.
ಅರ್ಜುನ ಕೃಷ್ಣನ ಸಂದೇಶವನ್ನು ಕೇಳಿ ಆನಂದ ಸಾಗರದಲ್ಲಿ ತೇಲುತ್ತಿದ್ದಾನೆ. ಆತ ಹೇಳುತ್ತಾನೆ: "ನಾನು ಅಮೃತಪಾನ ಮಾಡುತ್ತಿದ್ದೇನೆ, ಇಲ್ಲಿ ಸಾಕು ಎನ್ನುವುದಿಲ್ಲ" ಎಂದು. ಇದು ಮೋಕ್ಷಪ್ರದವಾದ, ಕಿವಿ

ಬೊಗಸೆಯಿಂದ ಮಾಡುವ ಅಮೃತಪಾನ. ಇದು ನಮ್ಮನ್ನು ಹುಟ್ಟು-ಸಾವಿನ ಸುಳಿಯಲ್ಲಿ ಸಿಗದಂತೆ ಮಾಡಿ,ಅಮೃತರನ್ನಾಗಿ ಮಾಡುವ ಜ್ಞಾನ. ಇದನ್ನು ಎಷ್ಟು ಸವಿದರೂ ತಣಿವಿಲ್ಲ. ಅದಕ್ಕಾಗಿ "ಇನ್ನೂ ಹೇಳು" ಎಂದು ಕೃಷ್ಣನಲ್ಲಿ ಅರ್ಜುನ ಕೇಳಿಕೊಳ್ಳುತ್ತಾನೆ.

ಭಗವಾನುವಾಚ ।

ಹಂತ ತೇ ಕಥಯಿಷ್ಯಾಮಿ ದಿವ್ಯಾ ಹ್ಯಾತ್ಮವಿಭೂತಯಃ ।
ಪ್ರಾಧಾನ್ಯತಃ ಕುರುಶ್ರೇಷ್ಠ ನಾಸ್ತ್ಯಂತೋ ವಿಸ್ತರಸ್ಯ ಮೇ ॥೧೯॥

ಭಗವಾನ್ ಉವಾಚ-ಭಗವಂತ ನುಡಿದನು:

ಹಂತ ತೇ ಕಥಯಿಷ್ಯಾಮಿ ದಿವ್ಯಾಃ ಹಿ ಆತ್ಮ ವಿಭೂತಯಃ ।

ಪ್ರಾಧಾನ್ಯತಃ ಕುರುಶ್ರೇಷ್ಠ ನ ಅಸ್ತಿ ಅಂತಃ ವಿಸ್ತರಸ್ಯ ಮೇ–ಕುರುಗಳ ಮುಂದಾಳೇ, ಭಲೆ! ನನ್ನ ಅಲೌಕಿಕವಾದ ವಿಭೂತಿ ರೂಪಗಳಲ್ಲಿ ಕೆಲವನ್ನು ಆಯ್ದು ಹೇಳುತ್ತೇನೆ. ನನ್ನ ಬಿತ್ತರಕ್ಕೆ ಕೊನೆಯಿಲ್ಲ.

ಸಂಸ್ಕೃತದಲ್ಲಿ 'ಹಂತ' ಎನ್ನುವ ಪದ ಸಂತೋಷ ಮತ್ತು ವಿಸ್ಮಯವನ್ನು ವ್ಯಕ್ತಪಡಿಸಲು ಬಳಸುವ ಪದ. ಕೃಷ್ಣ ಅರ್ಜುನನ ಆಸಕ್ತಿಯನ್ನು ಕಂಡು ಆತನನ್ನು 'ಭಲೆ' ಎಂದು ಹೊಗಳುತ್ತಾನೆ.

ಇಂದು ಯಾರಿಗೂ ವೇದಾಂತ ಕೇಳುವ ಇಚ್ಛೆ ಇಲ್ಲ. "ನಮಗೆ ಸಮಯವಿಲ್ಲ" ಎಂದು ಜಾರಿಕೊಳ್ಳುವವರೇ ಹೆಚ್ಚಾಗಿದ್ದಾರೆ. ಮಾನಸಿಕವಾಗಿ ನೋಡಿದರೆ 'ಸಮಯವಿಲ್ಲ' ಎನ್ನುವುದು ತಮಗೆ ಇಷ್ಟವಿಲ್ಲ ಎನ್ನುವುದನ್ನು ಮುಚ್ಚಿಡಲು ಬಳಸುವ ಪದ! ನಮಗೆ ಇಷ್ಟವಿದ್ದರೆ ಸಮಯವಿರುತ್ತದೆ! ಇಲ್ಲಿ ಅರ್ಜುನನ ಕಾತರತೆಯನ್ನು ಕೃಷ್ಣ ಪ್ರಶಂಸಿಸುತ್ತಾನೆ ಮತ್ತು "ನೀನು ಕೇಳಬೇಕೆಂದು ಬಯಸಿದ್ದನ್ನು ಖಂಡಿತವಾಗಿಯೂ ಹೇಳುತ್ತೇನೆ" ಎನ್ನುತ್ತಾನೆ. ಭಗವಂತನ ವಿಭೂತಿ ದಿವ್ಯವಾದದ್ದು ಮತ್ತು ಅದು ಅನಂತ. ಅದನ್ನು ಪೂರ್ಣ ವಿಸ್ತಾರವಾಗಿ ಹೇಳಲು ಸಾಧ್ಯವಿಲ್ಲ. ಇಲ್ಲಿ ಕೃಷ್ಣ ನಾವು ಮುಖ್ಯವಾಗಿ ಉಪಾಸನೆ ಮಾಡಬೇಕಾದ ಭಗವಂತನ ವಿಭೂತಿಯನ್ನು ಸಂಕ್ಷಿಪ್ತವಾಗಿ ಸಂಗ್ರಹ ಮಾಡಿ ಹೇಳಿದ್ದಾನೆ.

ಇಲ್ಲಿ 'ಕುರುಶ್ರೇಷ್ಠ' ಎನ್ನುವ ವಿಶೇಷಣ ಬಳಕೆಯಾಗಿದೆ. ತಮ್ಮನ್ನು ತಾವು ಭಗವದುಪಾಸನೆ ದಾರಿಯಲ್ಲಿ ತೊಡಗಿಸಿಕೊಂಡ ಸಾಧಕರು 'ಕುರುಗಳು'. ಇದು ಅಧ್ಯಾತ್ಮಕ್ಕೆ ಬೇಕಾದ ಕನಿಷ್ಠ ಅರ್ಹತೆ. "ನೀನು ಅಧ್ಯಾತ್ಮ ಸಾಧನೆಯಲ್ಲಿ ಎತ್ತರಕ್ಕೇರಿದವನು. ನಿನಗೆ ಈ ಸಾಧನೆಯಲ್ಲಿ ಕಳಕಳಿ ಇದೆ. ಅದಕ್ಕಾಗಿ ನಿನಗೆ ಖಂಡಿತವಾಗಿ ಹೇಳುತ್ತೇನೆ" ಎನ್ನುವ ಭಾವ ಈ ಸಂಬೋಧನೆಯ ಹಿಂದಿದೆ.

ಅಹಮಾತ್ಮಾ ಗುಡಾಕೇಶ ಸರ್ವಭೂತಾಶಯಸ್ಥಿತಃ ।
ಅಹಮಾದಿಶ್ಚ ಮಧ್ಯಂ ಚ ಭೂತಾನಾಮಂತ ಏವ ಚ ॥೨೦॥

ಅಹಮ್ ಆತ್ಮಾ ಗುಡಾಕೇಶ ಸರ್ವಭೂತ ಆಶಯಸ್ಥಿತಃ ।
ಅಹಮ್ ಆದಿಃ ಚ ಮಧ್ಯಮ್ ಚ ಭೂತಾನಾಮ್ ಅಂತಃ ಏವ ಚ–ಓ ಗುಡಾಕೇಶಾ, ಎಲ್ಲಾ ಗುಣಗಳ ನೆಲೆಯಾದ ನಾನೇ ಎಲ್ಲಾ ಜೀವಿಗಳ ಹೃದಯದಲ್ಲಿ ನೆಲೆಸಿರುವ ಅಂತರ್ಯಾಮಿ. ನಾನೇ ಎಲ್ಲಾ ಜೀವಿಗಳ ಬುಡ, ನಡು ಮತ್ತು ಕೊನೆ.

ವಿಭೂತಿಯ ಒಟ್ಟು ಸಾರ(essence) ಏನೆಂದರೆ: 'ಭಗವಂತ ಎಲ್ಲರ ಒಳಗೂ ತುಂಬಿದ್ದಾನೆ' ಎನ್ನುವುದು. ಕೃಷ್ಣ ಹೇಳುತ್ತಾನೆ: "ನಾನು ಪ್ರತಿಯೊಂದು ಜೀವಿಯ ಒಳಗೆ ಆತ್ಮವಾಗಿ ತುಂಬಿದ್ದೇನೆ. ಎಲ್ಲಾ ಜೀವಗಳ ಆತ್ಮ ನಾನು" ಎಂದು. ಈ ಶ್ಲೋಕದಲ್ಲಿ 'ಜೀವಾತ್ಮ-ಪರಮಾತ್ಮ ಒಂದೇ' ಎಂದು ಹೇಳಲಾಗಿದೆ ಎಂದು ಕೆಲವರು ತಪ್ಪಾಗಿ ತಿಳಿದುಕೊಳ್ಳುತ್ತಾರೆ. ಆದರೆ ಇಲ್ಲಿ ಕೃಷ್ಣ ಹೇಳಿರುವುದು 'ಜೀವಾತ್ಮರ ಆತ್ಮನಾಗಿ ನಾನು ತುಂಬಿದ್ದೇನೆ' ಎಂದೇ ಹೊರತು 'ನಾನೇ ಜೀವಾತ್ಮ' ಎಂದಲ್ಲ. ಇದು ಪ್ರತಿಯೊಂದು ಜೀವರ ಒಳಗೆ ಅಂತರ್ಯಾಮಿಯಾಗಿರುವ ಬಿಂಬರೂಪಿ ಭಗವಂತನನ್ನು ಹೇಳುತ್ತದೆ. ಭಗವಂತ 'ಸರ್ವಭೂತಾಶಯಸ್ಥಿತಃ'. ಸಮಸ್ತ ಜೀವಜಾತದ ಹೃದಯಗುಹೆಯಲ್ಲಿ ಅಂತರ್ಯಾಮಿಯಾಗಿ ನಿಂತಿದ್ದಾನೆ ಆ ಹೃತ್ಕಮಲ ಮಧ್ಯ ನಿವಾಸಿ. ಇದು ಭಗವಂತನ ಅತಿ ದೊಡ್ಡ ವಿಭೂತಿ. ಅನಂತ ಜೀವರೊಳಗೆ ಅನಂತ ವಿಭೂತಿ ರೂಪದಲ್ಲಿ ಭಗವಂತ ವ್ಯಕ್ತನಾಗುತ್ತಾನೆ. ಈ ಕಾರಣದಿಂದ ನಾವು ಒಂದೊಂದು ಜೀವರಲ್ಲಿ ಒಂದೊಂದು ಶಕ್ತಿ ವೈಶಿಷ್ಟ್ಯವನ್ನು ಕಾಣುತ್ತೇವೆ. ಸಮಸ್ತ ಜೀವಗಳು-ಹುಟ್ಟುವ ಮುಂಚೆ ಅವುಗಳ ಒಳಗೆ ನಿಯಾಮಕನಾಗಿ ನಿಂತು, ಅವುಗಳ ಸೃಷ್ಟಿಗೆ ಕಾರಣನಾಗಿ, ಅವುಗಳನ್ನು ರಕ್ಷಣೆ ಮಾಡಿ, ಪ್ರಳಯಕಾಲದಲ್ಲೂ ಕೂಡಾ ಎಲ್ಲವನ್ನೂ ಕಾಪಾಡುವ ಭಗವಂತ-ಎಲ್ಲಾ ಅವಸ್ಥೆಗಳಲ್ಲಿಯೂ ಒಳಗೆ ನಿಂತು ರಕ್ಷಿಸುವ ಶಕ್ತಿ.
ಇಲ್ಲಿ ಗುಡಾಕೇಶ ಎನ್ನುವ ವಿಶೇಷಣ ಬಳಸಲಾಗಿದೆ. ಇದು ಕೂಡಾ ಒಂದು ವಿಭೂತಿ ಗಮಕ. 'ಗುಡಾಕ' ಎಂದರೆ ನಿದ್ದೆ. 'ಗುಡಾಕೇಶ' ಎಂದರೆ ನಿದ್ದೆಯನ್ನು ಗೆದ್ದವ. ಅರ್ಜುನನಲ್ಲಿ ಈ ವಿಶೇಷ ಸಾಮರ್ಥ್ಯವಿತ್ತು. ಅದಕ್ಕಾಗಿ ಆತನನ್ನು ಈ ನಾಮದಿಂದ ಕರೆಯುತ್ತಿದ್ದರು. "ನಿನ್ನೊಳಗೆ ನಿದ್ದೆಯನ್ನು ಗೆಲ್ಲುವ ಶಕ್ತಿಯಾಗಿ ತುಂಬಿರುವವನೂ ನಾನೇ" ಎನ್ನುವ ಧ್ವನಿ ಈ ಸಂಬೋಧನೆಯಲ್ಲಿದೆ. ಈ ಅಧ್ಯಾಯದ ಮುಂದಿನ ಭಾಗದಲ್ಲಿ ಕೃಷ್ಣ ತನ್ನ ವಿಶಿಷ್ಟವಾದ ವಿಭೂತಿಯನ್ನು ವಿವರಿಸುತ್ತಾನೆ.

ಆದಿತ್ಯಾನಾಮಹಂ ವಿಷ್ಣುರ್ಜ್ಯೋತಿಷಾಂ ರವಿರಂಶುಮಾನ್।
ಮರೀಚಿರ್ಮರುತಾಮಸ್ಮಿ ನಕ್ಷತ್ರಾಣಾಮಹಂ ಶಶೀ ॥೨೧॥

ಆದಿತ್ಯಾನಾಮ್ ಅಹಮ್ ವಿಷ್ಣುಃ ಜ್ಯೋತಿಷಾಮ್ ರವಿಃ ಅಂಶುಮಾನ್।
ಮರೀಚಿಃ ಮರುತಾಮ್ ಅಸ್ಮಿ ನಕ್ಷತ್ರಾಣಾಮ್ ಅಹಮ್ ಶಶೀ–ಹನ್ನೆರಡು ಮಂದಿ ಅದಿತಿಯ ಮಕ್ಕಳಲ್ಲಿ [ಎಲ್ಲೆಡೆ ಹಬ್ಬಿರುವುದರಿಂದ, ಎಲ್ಲದರೊಳಗೂ ತುಂಬಿರುವುದರಿಂದ] ವಿಷ್ಣುನಾಮಕ[ವಾಮನ]ನಾನು. ಬೆಳಗಿಸುವ ಶಕ್ತಿಗಳಲ್ಲಿ ಕಿರಣಗಳಿಂದ ಬೆಳಗುವ ಹಿರಿಯ ಬೆಳಕು ರವಿ ನಾನು.[ರವ=ನಾದಗಳಿಂದ, ಇ=ಜ್ಞೇಯನಾಗಿ 'ರವಿ'

ಎಂಬ ಹೆಸರಿನಿಂದ ರವಿಯಲ್ಲಿದ್ದೇನೆ.] ಮರುತ್ತುಗಳ ಸಂತತಿಯಲ್ಲಿ ಮರೀಚಿ ನಾನು, [ಮರಿ=ನೀರು ತುಂಬಿದ ಮೊಡಗಳನ್ನು, ಚಿ=ಪ್ರಚೋದಿಸುವುದರಿಂದ 'ಮರೀಚಿ' ಎನ್ನಿಸಿ ಪ್ರವಹವಾಯುತನಯ ಮರೀಚಿಯಲ್ಲಿದ್ದೇನೆ.] ನಕ್ಷತ್ರಗಳ ಒಡೆಯ ಚಂದ್ರ [ಶ =ಎಲ್ಲಾ ಸುಖಗಳಿಗಿಂತ, ಶಿ=ಅಧಿಕ ಸುಖರೂಪನಾಗಿ 'ಶಶಿ'ಎನಿಸಿ ಚಂದ್ರನಲ್ಲಿದ್ದು ಅವನಿಗೆ ನಕ್ಷತ್ರಗಳ ಒಡೆತನವಿತ್ತವನು ನಾನು.

ತನ್ನ ವಿಭೂತಿಗಳ ಬಗ್ಗೆ ಹೇಳುತ್ತಾ ಕೃಷ್ಣ ಮೊಟ್ಟಮೊದಲು ನಿತ್ಯ ಉಪಾಸನೆಯಲ್ಲಿ ಬಹಳ ಮುಖ್ಯವಾದ ತನ್ನ ಸ್ವರೂಪ ವಿಭೂತಿಯನ್ನು ಹೇಳುತ್ತಾನೆ. ಅದಿತಿಯ ಹನ್ನೆರಡು ಮಂದಿ ಪುತ್ರರಲ್ಲಿ (ದ್ವಾದಶಾದಿತ್ಯರು-ವಿವಸ್ವಾನ್(ಸೂರ್ಯ), ಅರ್ಯಮಾ, ಪೂಷಾ, ತ್ವಷ್ಟಾ, ಸವಿತಾ, ಭಗ, ಧಾತಾ, ವಿಧಾತ, ವರುಣ, ಮಿತ್ರ, ಇಂದ್ರ, ಮತ್ತು ವಾಮನರೂಪಿ ವಿಷ್ಣು ) ಒಬ್ಬ ಭಗವಂತನ ಸಾಕ್ಷಾತ್ ವಿಭೂತಿ. ಆತನೇ ವಾಮನ ರೂಪಿ ವಿಷ್ಣು. ಆದ್ದರಿಂದ ಕೃಷ್ಣ ಹೇಳುತ್ತಾನೆ "ದ್ವಾದಶಾದಿತ್ಯರಲ್ಲಿ ವಿಷ್ಣು ನಾನು" ಎಂದು. ಇನ್ನು ಆದಿತ್ಯರು ಎಂದರೆ ಸಮಸ್ತ ದೇವತೆಗಳು ಎನ್ನುವ ಅರ್ಥವಿದೆ. ಸರ್ವ ದೇವತೆಗಳಲ್ಲಿ ದೇವೋತ್ತಮ 'ವಿಷ್ಣು' ಆ ಭಗವಂತ.

ಈ ಅಧ್ಯಾಯದಲ್ಲಿ ಬರುವ ಪ್ರತಿಯೊಂದು ನಾಮ ಕೂಡಾ ಭಗವಂತನ ವಿಭೂತಿ ನಾಮ. ಆದ್ದರಿಂದ ಪ್ರತಿಯೊಂದು ನಾಮದ ಹಿಂದೆ ಅನೇಕ ಅರ್ಥನಿಷ್ಪತ್ತಿ(etymological meaning)ಅಡಗಿದೆ. ಈ ಶ್ಲೋಕದಲ್ಲಿ ಬಂದಿರುವ ಮೊದಲ ಭಗವಂತನ ವಿಭೂತಿ ನಾಮ 'ವಿಷ್ಣುಃ'. ವಿಷ್ಣು ಎನ್ನುವ ನಾಮ ಏನನ್ನು ಹೇಳುತ್ತದೆ ಎಂದು ಸಂಕ್ಷಿಪ್ತವಾಗಿ ನೋಡೋಣ: ಪುರಾಣದಲ್ಲಿ, ಭಾರತದಲ್ಲಿ ಬಂದಿರತಕ್ಕಂತಹ ಪೌರಾಣಿಕ ಅರ್ಥ ನೋಡಿದರೆ ಮೂರು ಧಾತುವಿನಿಂದ 'ವಿಷ್ಣುಃ' ಶಬ್ದ ನಿಷ್ಪನ್ನವಾಗಿದೆ ಎನ್ನುವುದು ತಿಳಿಯುತ್ತದೆ. (೧) ವಿಷಲ್-ವ್ಯಾಪ್ತೋ (೨) ವಿಷತಿ-ಪ್ರವೇಶೇ (೩) ವೇತಿ- ಪ್ರಜನಯತಿ, ಗತಿ, ಕಾಂತಿ, ಕಾದನೇಷು, ಗಚ್ಛತಿ. ಈ ಧಾತುವಿನ ಅರ್ಥದಲ್ಲಿ ನೋಡಿದಾಗ-ವಿಷ್ಣುಃ ಎಂದರೆ ಎಲ್ಲಾ ಕಡೆ ತುಂಬಿದವನು(ವ್ಯಾಪ್ತ). ಆತ ಎಲ್ಲದರ ಹೊರಗೂ ಮತ್ತು ಎಲ್ಲದರ ಒಳಗೂ(ಪ್ರವೇಶ) ತುಂಬಿರುವುದರಿಂದ ಆತ ವಿಷ್ಣುಃ. ಇದನ್ನು ನಾರಾಯಣ ಸೂಕ್ತದಲ್ಲಿ "ಅಂತರ್ ಬಹಿಶ್ಚ ತತ್ ಸರ್ವಂ ವ್ಯಾಪ್ಯ ನಾರಾಯಣ ಸ್ಥಿತಃ" ಎಂದಿದ್ದಾರೆ. ಇನ್ನು 'ವೇತೀತಿ-ವಿಷ್ಣುಃ'. ಎಲ್ಲರು ಯಾರನ್ನು ಆಶ್ರಯಿಸಿಕೊಂಡಿದ್ದಾರೋ ಅವನು ವಿಷ್ಣು-ಸರ್ವಾಶ್ರಯಧಾತ ಭಗವಂತ. 'ವೇತಿ-ಪ್ರಜನಯತಿ'-ಯಾರು ಇಡೀ ಪ್ರಪಂಚವನ್ನು ಸೃಷ್ಟಿ ಮಾಡಿದನೋ ಅವನು ವಿಷ್ಣು. 'ವೇತಿ-ಗತಿ'- ಎಲ್ಲರನ್ನು ರಕ್ಷಣೆ ಮಾಡುವ ಸರ್ವ ರಕ್ಷಕ ಭಗವಂತ ವಿಷ್ಣು. 'ವೇತಿ-ಕಾಂತಿ(ಇಚ್ಛೆ)'-ಇಡೀ ಜಗತ್ತನ್ನು ರಕ್ಷಿಸಿ ಉದ್ಧಾರ ಮಾಡಬೇಕು ಎನ್ನುವ ಸತ್ಯ ಸಂಕಲ್ಪ ಇರುವವ ವಿಷ್ಣು. 'ವೇತಿ-ಕಾದನೇಶು'-ಸಮಸ್ತ ಜಗತ್ತನ್ನು ಯಾರು ಸಂಹಾರ ಮಾಡುತ್ತಾನೋ ಅವನು ವಿಷ್ಣು. 'ವೇತಿ-ಗಚ್ಛತಿ'- ಮೂರು ಹೆಜ್ಜೆಯಿಂದ ತ್ರಿವಿಕ್ರಮನಾಗಿ ಮೂರು ಲೋಕವನ್ನು ಯಾರು ವ್ಯಾಪಿಸುತ್ತಾನೋ ಅವನು ವಿಷ್ಣು. ಸಮಷ್ಟಿಯಾಗಿ ವಿಷ್ಣು ಎಂದರೆ 'ದೇವರು' ಎನ್ನುವ ಅರ್ಥವನ್ನು ಕೊಡುತ್ತದೆ. ಇವು ನಾವು ವಿಷ್ಣುಃ ಶಬ್ದದಿಂದ ಅನುಸಂಧಾನ ಮಾಡಬೇಕಾದ ಕೆಲವು ಅರ್ಥಗಳು. ಇದನ್ನು ಮಹಾಭಾರತದಲ್ಲಿ ಒಂದು ಕಡೆ ನಾಮಗಳ ನಿರ್ವಚನದಲ್ಲಿ ಹೇಳಿದ್ದಾರೆ. ಈ ನಿರ್ವಚನ ಭಾರತದಲ್ಲಿ ಅರ್ಜುನನಿಗೆ ಕೃಷ್ಣನೇ ಹೇಳಿದ ನಿರ್ವಚನ. ಒಟ್ಟಿನಲ್ಲಿ "ಎಲ್ಲರಿಗೂ ಆಶ್ರಯನಾದ, ಎಲ್ಲರ ಸೃಷ್ಟಿ-ಸ್ಥಿತಿ-ಸಂಹಾರಕ್ಕೆ ಕಾರಣನಾದ, ಎಲ್ಲದರ ಒಳಗೂ-ಹೊರಗೂ ತುಂಬಿರುವ, ಮೂರು ಹೆಜ್ಜೆಯಿಂದ ಮೂರು ಲೋಕವನ್ನು ಅಳೆದ ವಿಷ್ಣು ನಾನು" ಎಂದು ತನ್ನ ಸ್ವರೂಪ ವಿಭೂತಿಯನ್ನು ಕೃಷ್ಣ ವಿವರಿಸಿದ್ದಾನೆ.

ಸ್ವರೂಪ ವಿಭೂತಿಯನ್ನು ಹೇಳಿದ ಕೃಷ್ಣ, ನಂತರ ವಿಷ್ಣುವಿನ ಉಪಾಸನೆಗೆ ಅತ್ಯಂತ ಹಿರಿದಾದ ಪ್ರತೀಕ 'ಸೂರ್ಯ'ನಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ನಾವು ಗಾಯತ್ರಿ ಪ್ರತಿಪಾದ್ಯನಾದ ವಿಷ್ಣುವನ್ನು ಸೂರ್ಯನಲ್ಲಿ ಉಪಾಸನೆ ಮಾಡುತ್ತೇವೆ. ಇದು ಸೌರಶಕ್ತಿಯಲ್ಲಿ ಭಗವಂತನ ಉಪಾಸನೆ. ಇದು ಭಗವಂತನ ವಿಭೂತಿಯ ಎರಡನೇ ಮಜಲು. ಅದಕ್ಕಾಗಿ ವಿಷ್ಣುವಿನ ನಂತರ 'ರವಿ'ಯನ್ನು ಕೃಷ್ಣ ಪ್ರಸ್ತಾಪಿಸುತ್ತಾನೆ. ಸೂರ್ಯ ನಮ್ಮ ಕಣ್ಣಿಗೆ ಕಾಣುವ ಜ್ಯೋತಿಗಳಲ್ಲೇ ಅತ್ಯಂತ ದೊಡ್ಡ ಜ್ಯೋತಿ. ಸೂರ್ಯನಲ್ಲಿ 'ರವಿ' ನಾಮಕನಾಗಿ ತುಂಬಿರುವ ಭಗವಂತ ಸೌರಶಕ್ತಿಯಾಗಿ ವಿಶ್ವದಲ್ಲಿ ವ್ಯಾಪಿಸಿದ್ದಾನೆ.

ಇಲ್ಲಿ ಬಂದಿರುವ ಭಗವಂತನ ವಿಭೂತಿ ನಾಮ 'ರವಿಃ'. ರವ+ಇ-ರವದಿಂದ ತಿಳಿಯಲ್ಪಡುವವನು-ರವಿ. 'ರವ' ಎಂದರೆ ನಾದ. ಯಾರು ಗಾಯತ್ರಿ 'ರವ'ದಿಂದ ಜ್ಞೇಯನೋ ಅವನು ರವಿಃ. ಬೆಳಕುಗಳಿಗೆ ಬೆಳಕು ಕೊಡುವ ಭಗವಂತ, ಗಾಯತ್ರಿ ಪ್ರತಿಪಾದ್ಯನಾಗಿ, 'ರವಿ' ನಾಮಕನಾಗಿ ಸೂರ್ಯನಲ್ಲಿ, ಸೂರ್ಯ ಕಿರಣದಲ್ಲಿ ಸನ್ನಿಹಿತನಾಗಿದ್ದಾನೆ.

ಕೃಷ್ಣ ಹೇಳುವ ಮುಂದಿನ ವಿಭೂತಿ ಆಕಾಶದಲ್ಲಿ ವಾತಾವರಣದ ಬೇರೆಬೇರೆ ಪದರನ್ನು ನಿಯಮಿಸುವ ಮರುತ್ತುಗಳ ಸಂತತಿಯ ಮರೀಚಿ. ಮೂಲಭೂತವಾಗಿ ಮರುತ್ತುಗಳು ನಲವತ್ತೊಂಬತ್ತು ಮಂದಿ. ಇವರಲ್ಲಿ ಹತ್ತು ಮಂದಿ ನಮ್ಮ ಪಿಂಡಾಂಡ ನಿಯಮನ ಮಾಡುವವರು. ಈ ಮರುತ್ತುಗಳ ನಿಯಮನ ಮಾಡುವವ ಪ್ರವಹವಾಯು. ಪುರಾಣಗಳಲ್ಲಿ ಎಲ್ಲಿಯೂ ಈ ನಲವತ್ತೊಂಬತ್ತು ಮರುತ್ತುಗಳಲ್ಲಿ ಮರೀಚಿ ಎನ್ನುವ ಹೆಸರು ಬಂದಿಲ್ಲ. ಆದ್ದರಿಂದ ಇಲ್ಲಿ ಮರೀಚಿ ಈ ನಲವತ್ತೊಂಬತ್ತು ಮರುತ್ತುಗಳಲ್ಲಿ ಒಬ್ಬ ಎಂದು ಹೇಳುವುದು ಕಷ್ಟ. ಆದರೆ ಆತ ಪ್ರವಹವಾಯುವಿನ ಪುತ್ರ ಎನ್ನುವುದು ಸ್ಪಷ್ಟ. ಮಧ್ವಾಚಾರ್ಯರ ಐತರೇಯ ಉಪನಿಷತ್ತಿನ ಭಾಷ್ಯ ಮತ್ತು ಗೀತಾ ತಾತ್ಪರ್ಯವನ್ನು ಸಮನ್ವಯ ಮಾಡಿ ನೋಡಿದರೆ-ಮರೀಚಿ ಹದಿನೆಂಟನೇ ಕಕ್ಷೆಯಲ್ಲಿರುವ ಭೂತವಾಯು ದೇವತೆ. ಆದ್ದರಿಂದ ಈತ ಆಕಾಶ ಅಭಿಮಾನಿ ದೇವತೆ(ಗಣಪತಿ)ಯ ಸಮಾನಸ್ಕಂದ. ಭಗವಂತ ಮರೀಚಿನಾಮಕನಾಗಿ ಭೂತವಾಯುವಿನ ಅಭಿಮಾನಿ ದೇವತೆಯೊಳಗೆ ವಿಭೂತಿಯಾಗಿ ನಿಂತಿದ್ದಾನೆ.

ಇಲ್ಲಿ ಬಂದಿರುವ ಭಗವಂತನ ವಿಭೂತಿ ನಾಮ 'ಮರೀಚಿ'. ಮರ ಎಂದರೆ ನೀರು. ಮರಿ ಎಂದರೆ ನೀರು ತುಂಬಿರುವ ಮೋಡ. ಈ ಮೊಡವನ್ನು ಎಲ್ಲಿಗೆ ಕಳುಹಿಸಬೇಕೋ ಅಲ್ಲಿಗೆ ಸೇರಿಸುವ ವಾಯುವಿನಲ್ಲಿ ಸನ್ನಿಹಿತನಾಗಿ, ಮಳೆ ಬರಿಸುವ ಶಕ್ತಿಯನ್ನು ಮರೀಚಿಗೆ ಕೊಟ್ಟು, ಅವನಲ್ಲಿ ವಿಭೂತಿ ರೂಪದಲ್ಲಿ ಕೂತ ಭಗವಂತ 'ಮರೀಚಿ'.

ಆಕಾಶದಲ್ಲಿ ಸೂರ್ಯ ಮತ್ತು ವಾಯುವಿನಲ್ಲಿ ತನ್ನ ವಿಭೂತಿಯನ್ನು ಹೇಳಿದ ಕೃಷ್ಣ, ಮುಂದೆ ನಕ್ಷತ್ರಗಳ ರಾಜ ಚಂದ್ರನಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ಇದು ವಿಜಾತಿಯ ಸ್ರಷ್ಟಪ್ರಭ ವಿಭೂತಿ. ನಕ್ಷತ್ರಗಳ ಒಡೆಯ ಚಂದ್ರ. ಚಂದ್ರನಲ್ಲಿ ಎಲ್ಲಾ ನಕ್ಷತ್ರಗಳನ್ನು ನಿಯಮಿಸುವ ಶಕ್ತಿಯಾಗಿ 'ಶಶಿ' ಶಬ್ದವಾಚ್ಯ ಭಗವಂತ ಕೂತು ಅವನಿಗೆ ಆ ಶಕ್ತಿಯನ್ನು ಕೊಟ್ಟ.

ಇಲ್ಲಿ ಬಂದಿರುವ ಭಗವಂತನ ವಿಭೂತಿ ನಾಮ 'ಶಶಿಃ'. ಶಶ ಉಳ್ಳವನು ಶಶಿ. 'ಶ' ಎಂದರೆ ಆನಂದ. ಶಶ ಎಂದರೆ ಆನಂದದ ಆನಂದ-ಪರಮಾನಂದ. ಇಂತಹ ಪರಮಾನಂದ ಉಳ್ಳ ಭಗವಂತ ಆನಂದ ಮೂರ್ತಿಯಾಗಿ ಚಂದ್ರನಲ್ಲಿ ಕೂತ. ಈ ಕಾರಣದಿಂದ ನಮಗೆ ಬೆಳದಿಂಗಳು ಆನಂದವನ್ನು ಕೊಡುತ್ತದೆ.

ವೇದಾನಾಂ ಸಾಮವೇದೋಽಸ್ಮಿ ದೇವಾನಾಮಸ್ಮಿ ವಾಸವಃ ।
ಇಂದ್ರಿಯಾಣಾಂ ಮನಶ್ಚಾಸ್ಮಿ ಭೂತಾನಾಮಸ್ಮಿ ಚೇತನಾ ॥೨೨॥

ವೇದಾನಾಮ್ ಸಾಮ ವೇದಃ ಅಸ್ಮಿ ದೇವಾನಾಮ್ ಅಸ್ಮಿ ವಾಸವಃ ।
ಇಂದ್ರಿಯಾಣಾಮ್ ಮನಃ ಚ ಅಸ್ಮಿ ಭೂತಾನಾಮ್ ಅಸ್ಮಿ ಚೇತನಾ –ವೇದಗಳಲ್ಲಿ ಸಾಮವೇದ ನಾನು. [ಸಾಮ= ಎಲ್ಲೆಡೆಯೂ ಸಮನಾಗಿದ್ದು, ವೇದ= ಜ್ಞಾನರೂಪನಾದ್ದರಿಂದ 'ಸಾಮವೇದ' ಎನ್ನಿಸಿ ಸಾಮವೇದದಲ್ಲಿದ್ದೇನೆ.] ದೇವತೆಗಳಲ್ಲಿ ಇಂದ್ರ ನಾನು. [ವಾಸ= ಎಲ್ಲಾ ನೆಲೆಗಳಲ್ಲೂ, ವ=ಇರುವವನಾಗಿ- 'ವಾಸವ' ಎನ್ನಿಸಿ ದೇವೇಂದ್ರನಲ್ಲಿದ್ದೇನೆ.] ಇಂದ್ರಿಯಗಳಲ್ಲಿ ಮನಸ್ಸು ನಾನು. [ಅರಿವು ನೀಡುವುದರಿಂದ 'ಮನಸ್' ಎನ್ನಿಸಿ ಮನಸ್ಸಿನಲ್ಲಿದ್ದೇನೆ.] ಜೀವಿಗಳ ಚೈತನ್ಯ ನಾನು. [ಚೇತಸ್ =ಎಲ್ಲಾ ಜೀವಿಗಳ ನೆನಪಿನ ಗಂಟನ್ನು, ನಾ=ಬಿಡಿಸುವುದರಿಂದ 'ಚೇತನಾ' ಎನ್ನಿಸಿ ಚೇತನಾಶಕ್ತಿಯಲ್ಲಿದ್ದೇನೆ.]

ಆಕಾಶದಲ್ಲಿ-ಸೂರ್ಯ, ಚಂದ್ರ, ನಕ್ಷತ್ರ, ಗಾಳಿಯಲ್ಲಿ ತನ್ನ ವಿಭೂತಿಯನ್ನು ಹೇಳಿದ ಕೃಷ್ಣ, ಇಲ್ಲಿ ಆಕಾಶದ ವಿಶೇಷ ಗುಣವಾದ ಶಬ್ದದ ಬಗ್ಗೆ ಹೇಳುತ್ತಾನೆ. ಶಬ್ದದ ವಿಭೂತಿ-ವೇದ. ವೇದದಲ್ಲಿ ವಿಶಿಷ್ಟವೇದ-ಸಾಮವೇದ. ವೇದಗಳೆಲ್ಲವೂ ಅಪೂರ್ವವಾಗಿದ್ದರೂ ಕೂಡಾ, ಸಾಮವನ್ನು ಏಕೆ ವಿಶೇಷವಾಗಿ ಹೇಳಿದ್ದಾರೆ ಎನ್ನುವ ಪ್ರಶ್ನೆ ನಿಮ್ಮಲ್ಲಿ ಬರಬಹುದು. ವೇದದಲ್ಲಿ ತಾರತಮ್ಯವಿಲ್ಲ. ಆದರೆ ವೇದಾಭಿಮಾನಿಗಳಲ್ಲಿ ತಾರತಮ್ಯವಿದೆ. ಸಾಮವೇದದ ಅಭಿಮಾನಿ ಪ್ರಾಣದೇವರು. ಶಾಸ್ತ್ರಕಾರರು ಹೇಳುವಂತೆ ಸಾಮಗಾನವನ್ನು ಅತ್ಯಂತ ಮಧುರವಾಗಿ ಹಾಡುವವರು ಪ್ರಾಣದೇವರು. ಪ್ರಾಣದೇವರ ಹಾಡು 'ಸಾಮಗಾನ' ಭಗವಂತನಿಗೆ ಅತಿ ಇಷ್ಟ. ಸಾಮವೇದದ ವೈಶಿಷ್ಟ್ಯ 'ನಾದ'. ಒಂದು ಶಬ್ದವನ್ನು ಹೇಗೆ ಒಡೆದರೂ, ಅದನ್ನು ಹೇಗೆ ಪದಪಾಠ ಮಾಡಿದರೂ, ಅದರಲ್ಲಿ ಯಾವ ನಾದ ತುಂಬಿದರೂ, ಅದು ಭಗವಂತನ ನಾಮದೇಯವಾಗುತ್ತದೆ ಎನ್ನುವ ಪ್ರಯೋಗ ಸಾಮವೇದ. ಋಗ್ವೇದ ಮತ್ತು ಯಜುರ್ವೇದದಲ್ಲಿ ಮಂತ್ರಗಳ ಹಾಗೂ ಶಬ್ದಗಳ ಮುಖೇನ ಭಗವಂತನ ಸ್ತುತಿಯಾದರೆ, ಸಾಮವೇದದಲ್ಲಿ ಶಬ್ದದ ಜೊತೆಗೆ ನಾದವನ್ನು ಭಗವಂತನಲ್ಲಿ ಸಮನ್ವಯಗೊಳಿಸುವ ಅಪೂರ್ವ ಗುಣಧರ್ಮವಿದೆ(Exclusive quality). ಶಬ್ದಗಳ ಹಿಂದಿನ ನಾದದಿಂದ ಭಗವಂತನನ್ನು ಕಾಣುವ ನಾದೋಪಾಸನೆ ಇರುವ ವೇದ ಸಾಮವೇದವಾದ್ದರಿಂದ-ಭಗವಂತ ಸಾಮದಲ್ಲಿ ವಿಶೇಷವಾಗಿ ಸನ್ನಿಹಿತನಾಗಿದ್ದಾನೆ. ಆದ್ದರಿಂದ 'ಸಾಮ' ಭಗವಂತನ ಅನ್ವರ್ಥ ನಾಮ. ಎಲ್ಲಾ ಶಬ್ದಗಳು ಭಗವದ್ ಪರ ಎನ್ನುವುದನ್ನು ಋಗ್ವೇದ ತೋರಿಸಿದರೆ, ಶಬ್ದವಷ್ಟೇ ಅಲ್ಲ, ಎಲ್ಲಾ ಘೋಷಗಳೂ ಭಗವಂತನನ್ನು ಹೇಳುತ್ತವೆ ಎನ್ನುವುದನ್ನು ಸಾಮವೇದ ತೋರಿಸುತ್ತದೆ.
ಭಗವಂತ 'ಸಾಮಃ' ಮತ್ತು ಆತ 'ವೇದಃ'. ಇಲ್ಲಿ 'ಸಾಮಃ' ಎಂದರೆ ಎಲ್ಲೆಡೆಯೂ ಸಮನಾಗಿರುವವ ಎಂದರ್ಥ. 'ವೇದಃ' ಎಂದರೆ ಜ್ಞಾನ ರೂಪ. ಭಗವಂತ ನಾದವಾಗಿ ಸಾಮವೇದದಲ್ಲಿ ತುಂಬಿ ಅದನ್ನು ವಿಭೂತಿಯಾಗಿ ಮಾಡಿದ.
ವೇದದ ನಂತರ ವೇದಪ್ರತಿಪಾದ್ಯ ದೇವತೆಗಳು. ದೇವತೆಗಳಲ್ಲಿ ಮುಖ್ಯವಾಗಿ ತತ್ತ್ವಾಭಿಮಾನಿ ದೇವತೆಗಳು. ಭಗವಂತನ ಅಧಿಷ್ಠಾನವಾಗಿ ಇಂದ್ರಿಯಗಳನ್ನು ನಿಯಮಿಸುವ ದೇವತೆಗಳಲ್ಲಿ ಮುಖ್ಯನಾದವ 'ವಾಸವ'(ಇಂದ್ರ).

ಈತ ಬಾಹ್ಯೇಂದ್ರಿಯಾಭಿಮಾನಿ ದೇವತೆಗಳಲ್ಲಿ ಶ್ರೇಷ್ಠ. ಈತ ಐದು ಜ್ಞಾನೇಂದ್ರಿಯ(ಕಣ್ಣು, ಕಿವಿ, ಮೂಗು, ನಾಲಿಗೆ, ಚರ್ಮ) ಮತ್ತು ಐದು ಕರ್ಮೇಂದ್ರಿಯ(ಕೈ, ಕಾಲು, ಬಾಯಿ, ಪಾಯು, ಉಪಸ್ಥ)ಗಳಲ್ಲಿ ಅತ್ಯಂತ ವಿಶಿಷ್ಟವಾದ ಕೈ(ಹಸ್ತ)ಯ ಅಭಿಮಾನಿ ದೇವತೆ. ಇತರ ಎಲ್ಲಾ ಇಂದ್ರಿಯಗಳು ಬೇರೆ ಪ್ರಾಣಿಗಳಿಗೂ ಇದೆ. ಆದರೆ ಕುಸುರಿ ಕೆಲಸ, ನಾಟ್ಯಭಂಗಿ, ಶಿಲ್ಪ ಇತ್ಯಾದಿ ಅತ್ಯದ್ಭುತ ಹಸ್ತಕೌಶಲ ಭಗವಂತ ಕೇವಲ ಮಾನವರಿಗೆ ಮಾತ್ರ ಕೊಟ್ಟಿದ್ದಾನೆ. ಮಹಾಭಾರತದಲ್ಲಿ ನಮ್ಮ ಕೈಯ ವಿಶಿಷ್ಟತೆಯನ್ನು ಹೇಳುವ ಒಂದು ಕಥೆ ಇದೆ. ಒಬ್ಬ ನಿರುದ್ಯೋಗಿ ವಿದ್ವಾಂಸ ತನ್ನ ನಿರುದ್ಯೋಗದಿಂದ ಬೇಸತ್ತು ಆತ್ಮಹತ್ಯೆ ಮಾಡಿಕೊಳ್ಳಬೇಕೆಂದು ತೀರ್ಮಾನ ಮಾಡಿ ನಿಂತಿರುವಾಗ, ಒಂದು ನರಿ ಆತನಲ್ಲಿ ಹೇಳುತ್ತದೆ: "ಅಲ್ಲಯ್ಯ, ನಿನಗೆ ದೇವರು ದುಡಿಯಲು ಎರಡು ಕೈ ಕೊಟ್ಟಿದ್ದಾನೆ. ಆದರೆ ನಮಗೆ ಸಿಕ್ಕಿದ ಆಹಾರವನ್ನು ತಿನ್ನಲು ಕೂಡಾ ಕೈ ಇಲ್ಲ. ಮೈಯಲ್ಲಿ ಕುಳಿತು ರಕ್ತ ಹೀರುವ ನೊಣವನ್ನು ಓಡಿಸಲೂ ಕೈ ಇಲ್ಲ. ಆದರೂ ನಾವು ಬದುಕುತ್ತೇವೆ. ನಿಮಗೆ ಇಂತಹ ಅಮೂಲ್ಯ ಕೈ ಇದ್ದರೂ ನೀವು ಸಾಯಲು ಮುಂದಾಗುತ್ತಿದ್ದೀರಲ್ಲ-ನೀವೆಂಥಾ ಬುದ್ಧಿಗೇಡಿಗಳು" ಎಂದು. ಈ ಮಾತನ್ನು ಕೇಳಿ ಆ ವಿದ್ವಾಂಸ ಮರಳಿ ಬರುತ್ತಾನೆ. ಈ ಕಥೆಯಲ್ಲಿ ಕೈಯ ಮಹತ್ವವನ್ನು ತಿಳಿಹೇಳಿದ್ದಾರೆ. ಕೈಯ ಅಭಿಮಾನಿಯಾದ ಆ 'ವಾಸವ'ನಲ್ಲಿ ಭಗವಂತ ವಾಸ ಮಾಡಿ, ಇತರ ಎಲ್ಲಾ ತತ್ತ್ವಾಭಿಮಾನಿ ದೇವತೆಗಳನ್ನು ನಿಯಂತ್ರಿಸುವ ಶಕ್ತಿಯನ್ನು ತುಂಬಿದ. ಇಂತಹ 'ವಾಸವ' ನಾಮಕ ಭಗವಂತ ವಿಭೂತಿಯಾಗಿ ಇಂದ್ರನಲ್ಲಿ ತುಂಬಿರುವುದರಿಂದ ಇಂದ್ರನನ್ನು 'ವಾಸವ' ಎಂದು ಕರೆಯುತ್ತಾರೆ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ವಾಸವಃ'. 'ವಾಸವ' ಎಂದರೆ ವಸುಗಳ ಸಮುದಾಯ. ವಸುಗಳೆಂದರೆ-"ದೇವತೆಗಳ ಸಮುದಾಯ". ಬ್ರಹ್ಮಾಂಡದಲ್ಲಿದ್ದು-ಬ್ರಹ್ಮಾಂಡವನ್ನು, ಪಿಂಡಾಂಡದಲ್ಲಿದ್ದು-ಪಿಂಡಾಂಡವನ್ನು ನಿಯಂತ್ರಿಸುವ ತತ್ತ್ವಾಭಿಮಾನಿ ದೇವತೆಗಳ ನಿಯಾಮಕನಾದ ಭಗವಂತ ವಾಸವಃ. ಎಲ್ಲಾ ನೆಲೆಗಳಲ್ಲೂ, ಇರುವವನಾಗಿ ಭಗವಂತ 'ವಾಸವಃ'.

ಬಾಹ್ಯೇಂದ್ರಿಯದ ನಂತರ ಕೃಷ್ಣ ನಮ್ಮ ಅಂತರಂಗ ಪ್ರಪಂಚದಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ಮನುಷ್ಯನ ಎಲ್ಲಾ ಕಾರುಬಾರಿಗೆ ಕಾರಣ ಮನಸ್ಸು. ಮನಸ್ಸಿಲ್ಲದಿದ್ದರೆ ಎಲ್ಲವೂ ಶೂನ್ಯ. ಇದು ಇಂದ್ರಿಯಗಳ ಚಟುವಟಿಕೆಗಳಿಗೆ ಮೂಲ ಪ್ರೇರಣೆ. ಹೊರಗಿನ ಎಲ್ಲಾ ವಸ್ತುವನ್ನು ಒಳಗಿನ ಆತ್ಮಕ್ಕೆ ಮುಟ್ಟಿಸುವ ಮಾಧ್ಯಮ 'ಮನಸ್ಸು'. ಇಂದ್ರಿಯ ಇರುವುದು ಸಾರ್ಥಕವಾಗುವುದು ಮನಸ್ಸಿನ ಮೂಲಕ. ಶಾಸ್ತ್ರ ಓದಿದಾಗ ನಮಗೆ ವಿಷಯ ಹೊಳೆಯುವುದು ಮನಸ್ಸಿನ ಮೂಲಕ. ಭಗವಂತ ಮನನಕ್ಕೆ ಕಾರಣನಾಗಿ 'ಮನಃ' ಶಬ್ದ ವಾಚ್ಯನಾಗಿ ನಮ್ಮಲ್ಲಿ ಕೂತಿರುವುದರಿಂದ ನಮಗೆ ಈ ಶಕ್ತಿ ಬಂತು. ಮನುತೇ ಇತಿ ಮನಃ. ಜ್ಞಾನಸ್ವರೂಪನಾದವ, ಎಲ್ಲವನ್ನು ತಿಳಿಯುವವ, ಎಲ್ಲವನ್ನೂ ಬಲ್ಲವನು 'ಮನಸ್' ಶಬ್ದ ವಾಚ್ಯ ಭಗವಂತ.

ಮನಸ್ಸಿನ ನಂತರ, ಮನಸ್ಸಿನ ಮೂಲಕ ಬರುವ ವಿಷಯವನ್ನು ಗ್ರಹಣ ಮಾಡುವ ಶಕ್ತಿ- ಅರಿವು(Awareness). ಭಗವಂತ ನಮ್ಮೊಳಗಿದ್ದು, ಮನಸ್ಸು ಕಂಡದ್ದನ್ನು ಅರಿವಾಗಿ-ವಿಷಯವನ್ನು ಸ್ವೀಕರಿಸುವ ಗ್ರಹಣ ಶಕ್ತಿಯಾಗಿ ಕೂತ. ಇದರಿಂದ ಪ್ರಪಂಚವನ್ನು ಗ್ರಹಣ ಮಾಡುವ ಶಕ್ತಿ ಜೀವಕ್ಕೆ ಬಂತು. ಇಡೀ ವಿಶ್ವವನ್ನು ತನ್ನ ಅರಿವಿನಿಂದ ಗ್ರಹಣ ಮಾಡಿ, ವ್ಯಾಪಿಸುವ ವಿಸ್ಮಯ ಭಗವಂತ 'ಚೇತನಃ'. 'ಚೇತಸ್' ಎಂದರೆ ನಮ್ಮ ಸುಪ್ತಪ್ರಜ್ಞೆ. ನಮ್ಮ ಪ್ರತಿಯೊಂದು ಅನುಭವ ನಮ್ಮ ಸುಪ್ತಪ್ರಜ್ಞೆಯಲ್ಲಿ ಸಂಗ್ರಹವಾಗಿರುತ್ತದೆ. ಚಿತ್ತಕ್ಕೆ ಎಲ್ಲವನ್ನು ಗ್ರಹಿಸುವ ಶಕ್ತಿ ಕೊಟ್ಟವ 'ಚೇತನಃ' ನಾಮಕ ಭಗವಂತ. ಇದು ಭಗವಂತನ ವಿಭೂತಿ.

ರುದ್ರಾಣಾಂ ಶಂಕರಶ್ಚಾಸ್ಮಿ ವಿತ್ತೇಶೋ ಯಕ್ಷರಕ್ಷಸಾಮ್ ।
ವಸೂನಾಂ ಪಾವಕಶ್ಚಾಸ್ಮಿ ಮೇರುಃ ಶಿಖರಿಣಾಮಹಮ್ ॥೨೩॥

ರುದ್ರಾಣಾಮ್ ಶಂಕರಃ ಚ ಅಸ್ಮಿ ವಿತ್ತ ಈಶಃ ಯಕ್ಷರಕ್ಷಸಾಮ್ ।
ವಸೂನಾಮ್ ಪಾವಕಃ ಚ ಅಸ್ಮಿ ಮೇರುಃ ಶಿಖರಿಣಾಮ್ ಅಹಮ್–ರುದ್ರರಲ್ಲಿ [ಹನ್ನೊಂದು ಮಂದಿ] ಪ್ರಧಾನ ರುದ್ರ ನಾನು. [ಶಂ=ಸುಖವನ್ನು, ಕರ=ಕರುಣಿಸುವುದರಿಂದ 'ಶಂಕರ' ಎನ್ನಿಸಿ ಶಂಕರನಲ್ಲಿದ್ದೇನೆ.] ಯಕ್ಷ-ರಾಕ್ಷಸರ ಪಡೆಯ ಒಡೆಯ ಕುಬೇರ [ವಿತ್ತ=ಸಿರಿಗೆ, ಈಶ=ಒಡೆಯನಾದ್ದರಿಂದ 'ವಿತ್ತೇಶ' ಎನ್ನಿಸಿ ಕುಬೇರನಲ್ಲಿದ್ದು ಅವನಿಗೆ ಯಕ್ಷ-ರಾಕ್ಷಸರ ಒಡೆತನವನ್ನಿತ್ತವನು] ನಾನು. [ಎಂಟು ಮಂದಿ] ವಸುಗಳಲ್ಲಿ ಅಗ್ನಿದೇವ ನಾನು. [ಪಾವನಗೊಳಿಸುವುದರಿಂದ 'ಪಾವಕ' ಎನ್ನಿಸಿ ಅಗ್ನಿಯಲ್ಲಿದ್ದೇನೆ.] ಚೆಲುಕೋಡಿನ ಬೆಟ್ಟಗಳಲ್ಲಿ ಮೇರು ನಾನು. [ಈರು=ಬೇರೊಬ್ಬ ಪ್ರೇರಕ, ಮಾ=ಇರದ್ದರಿಂದ 'ಮೇರು' ಎನ್ನಿಸಿ ಮೇರು ಗಿರಿಯಲ್ಲಿದ್ದೇನೆ.]

ಮನಸ್ಸಿನಲ್ಲಿನ ತನ್ನ ವಿಭೂತಿಯನ್ನು ಹೇಳಿದ ಕೃಷ್ಣ, ಇಲ್ಲಿ ಮನಸ್ಸಿನ ಅಭಿಮಾನಿಯಾದ ಶಿವನಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ಕೃಷ್ಣ ಹೇಳುತ್ತಾನೆ: "ರುದ್ರರಲ್ಲಿ ಶಂಕರ ನಾನು" ಎಂದು. ರುದ್ರರು ಹನ್ನೊಂದು ಮಂದಿ. ರೈವತ, ಓಜ, ಭವ, ಭೀಮ, ವಾಮದೇವ, ಉಗ್ರ, ವೃಷಾಕಪಿ, ಅಜೈಕಪಾತ್, ಅಹಿರ್ಬುಧ್ನಿ, ವಿರೂಪಾಕ್ಷ, ಮತ್ತು ಗಣಪ್ರಧಾನನಾದ ಮಹಾದೇವ. (ಈ ಏಕಾದಶ ರುದ್ರರಿಗೆ ಒಬ್ಬೊಬ್ಬರಿಗೂ ಅನೇಕ ಹೆಸರುಗಳುಂಟು. ಬೇರೆಬೇರೆ ಕಡೆ ಬೇರೆಬೇರೆ ಹೆಸರು ಉಲ್ಲೇಖ ಮಾಡಿದ್ದಾರೆ). ನಮ್ಮ ಮನಸ್ಸನ್ನು ನಿಯಂತ್ರಿಸುವ 'ರುದ್ರ'- ಮಹಾದೇವ ಅಥವಾ ಶಿವ. ಆತನಿಗೆ 'ಶಂಕರ' ಎಂದು ಹೆಸರು. ರುದ್ರ ಎಂದರೆ ರೋದಯತಿ ಇತಿ ರುದ್ರಃ-ದುಃಖ ಕೊಡುವವನು ಎನ್ನುವ ಒಂದು ಅರ್ಥ. ಭಗವಂತ ದುಃಖ ಕೊಡುವುದು ಕೇವಲ ದುಷ್ಟರಿಗೆ. ಇನ್ನೊಂದು ಅರ್ಥದಲ್ಲಿ ನೋಡಿದರೆ- ರುಜಂ ದ್ರಾವಯತಿ ಇತಿ ರುದ್ರಃ. ಅಂದರೆ ನಮ್ಮಲ್ಲಿರುವ ರೋಗವನ್ನು ಪರಿಹಾರ ಮಾಡಿ ಸುಖಕೊಡುವವನು. ಮೂಲತಃ ರೋಗ ಮಾನಸಿಕ. ನಮ್ಮ ಮನಸ್ಸು ದೃಢವಾಗಿದ್ದರೆ ಕಾಯಿಲೆ ಬರುವುದಿಲ್ಲ. ಒಂದು ವೇಳೆ ಕಾಯಿಲೆ ಬಂದರೆ ಅದನ್ನು ಎದುರಿಸಬಲ್ಲೆ ಎನ್ನುವ ದೃಢಮನಸ್ಸು ಇದ್ದರೆ-ಮನಸ್ಸೇ ಆ ರೋಗವನ್ನು ಗುಣಪಡಿಸಬಲ್ಲದು.

'ಶಂಕರ' ಎಂದರೆ ಸುಖವನ್ನು, ಸಂತೋಷವನ್ನು ಕೊಡುವವ. ಆರೋಗ್ಯವಂತ ದೇಹವೇ ಜೀವನದಲ್ಲಿ ಬಹಳ ದೊಡ್ಡ ಸುಖ. ಯಾವುದೇ ಪುಣ್ಯ ಕರ್ಮ ಸಾಧನೆ ಮಾಡಲು ಆರೋಗ್ಯವಂತ ದೇಹ ಬೇಕು. 'ರುದ್ರ' ಶರೀರಪುರುಷ. ಈ ದೇಹ ನಿಂತು ನಡೆದಾಡಬೇಕಾದರೆ ದೇಹದಲ್ಲಿ ಶರೀರಪುರುಷನಾದ ಶಿವಶಕ್ತಿ ಕಾರಣ. ನಮ್ಮ ಮನಸ್ಸಿನಲ್ಲಿ ಕೂತು ಮಾನಸಿಕ ತುಮುಲವನ್ನು ಹೋಗಲಾಡಿಸಿ, ಆರೋಗ್ಯವಂತ ಶರೀರ ಕೊಟ್ಟು, ಆನಂದ ಕೊಡುವವ ರುದ್ರ. ಋಗ್ವೇದದ ಶಿವಸ್ತುತಿಯಲ್ಲಿ ಶಿವನನ್ನು "ಭಿಶಕ್ತಮಾಂ ತ್ವ ಭಿಶಜಮ್" ಎಂದು ಸ್ತುತಿಸಿದ್ದಾರೆ. ಅಂದರೆ "ನೀನು ವೈದ್ಯರ ವೈದ್ಯ" ಎಂದರ್ಥ. ಈ ಕಾರಣಕ್ಕಾಗಿ ಶಿವನನ್ನು 'ವೈದ್ಯನಾಥ' ಎಂದೂ ಕರೆಯುತ್ತಾರೆ.

ರುದ್ರನನ್ನು ಮಹಾದೇವ ಎಂದು ಕರೆಯಲು ಅನೇಕ ಕಾರಣವಿದೆ. ಇಲ್ಲಿ 'ದೇವ' ಅಂದರೆ ಇಂದ್ರಿಯ.(ದೇವತೀತಿ ದೇವಂ ಇಂದ್ರಿಯಂ). ಶಿವ ಇಂದ್ರಿಯಾಭಿಮಾನಿ ದೇವತೆಗಳಲ್ಲಿ ಎಲ್ಲರಿಗಿಂತ ದೊಡ್ಡವ. ದೇವತಾ ತಾರತಮ್ಯದಲ್ಲಿ ನೋಡಿದರೆ-ಹನ್ನೊಂದು ಮಂದಿ ರುದ್ರರಲ್ಲಿ ಹತ್ತುಮಂದಿ ರುದ್ರರು ಹದಿನೆಂಟನೇ ಕಕ್ಷೆಯಲ್ಲಿದ್ದರೆ,

ಶಿವ ಅದಕ್ಕಿಂತ ಬಹಳ ಎತ್ತರದಲ್ಲಿ ಐದನೇ ಕಕ್ಷೆಯಲ್ಲಿದ್ದಾನೆ. ಶಿವ ಭಗವಂತನ ಸಂಹಾರ ಕರ್ಮದಲ್ಲಿ ವಾಯುದೇವರೊಂದಿಗೆ ಅಂಗಭೂತನಾಗಿ ಸಹಾಯಕಾರಿಯಾಗಿರುವ ಬಹಳ ದೊಡ್ಡ ಶಕ್ತಿ. ಭಗವಂತ 'ಶಂಕರ' ನಾಮಕನಾಗಿ ಶಿವನಲ್ಲಿ ನಿಂತಿದ್ದಾನೆ. ನಮ್ಮನ್ನು ಭಗವಂತನ ಉಪಾಸನೆಯ ದಾರಿಯಲ್ಲಿ ಕರೆದೊಯ್ದು, ಭಗವದ್ ಸಾಕ್ಷಾತ್ಕಾರಕ್ಕೆ ಮನಸ್ಸನ್ನು ಅಣಿಮಾಡುವವರೇ ರುದ್ರದೇವರು. ಆದ್ದರಿಂದ ಇದು ಭಗವಂತನ ಬಹಳ ದೊಡ್ಡ ವಿಭೂತಿ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಶಂಕರಃ'. 'ಶಂ' ಎಂದರೆ ಸುಖ, 'ಕರ' ಎಂದರೆ ಕರುಣಿಸುವವ. ಸ್ವಯಂ ಆನಂದ ಸ್ವರೂಪನಾಗಿದ್ದು, ದುಃಖಮಯವಾದ ಸಂಸಾರವನ್ನು ಖಂಡಿಸಿ- ನಮಗೆ ಮುಕ್ತಿ ಕೊಡುವ ಭಗವಂತ 'ಶಂಕರಃ'.

ನಮ್ಮ ಅಂತರಂಗದ ಸಂಪತ್ತಿನ ಅಭಿಮಾನಿಯಾದ ಶಿವನ ಬಗ್ಗೆ ಹೇಳಿದ ಕೃಷ್ಣ, ಮುಂದೆ ನಮಗೆ ಬಾಹ್ಯವಿತ್ತವನ್ನು ಕೊಡುವ ಕುಬೇರನಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ನಮ್ಮ ದೇಹದ ಅಭಿಮಾನಿ ಮತ್ತು ಬಾಹ್ಯವಿತ್ತದ ಅಭಿಮಾನಿ ಕುಬೇರ. ಆತನ ಆಡಳಿತದಲ್ಲಿರುವವರು ಯಕ್ಷರು ಮತ್ತು ರಾಕ್ಷಸರು. ಯಕ್ಷರು ಎಂದರೆ ನರ ಮಾಂಸವನ್ನು ನಿರ್ದಯವಾಗಿ ಭಕ್ಷಣೆ ಮಾಡುವವರು. ರಾಕ್ಷಸರು ಯಕ್ಷರಿಗಿಂತ ಉತ್ತಮರು. ಆದರೆ ಇವರೂ ಕ್ರೂರಿಗಳು. ಇವರಿಂದ ನಾವು ನಮ್ಮನ್ನು ರಕ್ಷಣೆ ಮಾಡಿಕೊಳ್ಳಬೇಕು.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ವಿತ್ತೇಶಃ'. ವಿತ್ತ ಎಂದರೆ ಸಿರಿ, ಈಶ ಎಂದರೆ ಒಡೆಯ. ಭಗವಂತ 'ವಿತ್ತೇಶ' ಎನ್ನಿಸಿ ಕುಬೇರನಲ್ಲಿದ್ದು, ಅವನಿಗೆ ಯಕ್ಷ-ರಾಕ್ಷಸರ ಒಡೆತನವನ್ನು ಕೊಟ್ಟ ಮತ್ತು ಆತನನ್ನು ಬಾಹ್ಯ ಸಂಪತ್ತಿನ ಒಡೆಯನನ್ನಾಗಿ ಮಾಡಿದ. ಇದು ಕುಬೇರನಲ್ಲಿ ಭಗವಂತನ ವಿಶೇಷ ವಿಭೂತಿ.

ವೇದದಲ್ಲಿ ಬರುವ ದೇವತಾಗಣವನ್ನು ಪರಿಗಣನೆ ಮಾಡುವಾಗ, ಆದಿತ್ಯ-ವಸು-ರುದ್ರಗಣ ಮೂರು ಜೊತೆಜೊತೆಯಾಗಿ ಬರುತ್ತವೆ. ಮೂರು ಹೊತ್ತಿನ ಸವನದಲ್ಲಿ ಭಗವಂತನಿಗೆ ಆಹುತಿ ಕೊಡುವುದು ಕೂಡಾ ಈ ದೇವತಾಗಣದಲ್ಲಿರುವ ಭಗವಂತನಿಗೆ. ಅಷ್ಟವಸುಗಳಲ್ಲಿ ಇರತಕ್ಕ ಭಗವಂತನಿಗೆ ಪ್ರಾತಃಕಾಲದಲ್ಲಿ ಅಷ್ಟಾಕ್ಷರ ಮಂತ್ರ ಗಾಯತ್ರಿ ಮೂಲಕ ಆಹುತಿ ಕೊಡುತ್ತಾರೆ. ಮದ್ಯಾಹ್ನದ ಸವನ ಏಕಾದಶ ರುದ್ರರಿಗೆ ಸಂಬಂಧಪಟ್ಟದ್ದು. ಇದಕ್ಕಾಗಿ ಇಲ್ಲಿ ಹನ್ನೊಂದು ಅಕ್ಷರದ 'ತ್ರಿಷ್ಟುಪ್' ಬಳಸುತ್ತಾರೆ. ಸಂಜೆಯ ಸವನ ದ್ವಾದಶಾದಿತ್ಯರಿಗೆ ಸಂಬಂಧಪಟ್ಟದ್ದು. ಅದಕ್ಕಾಗಿ ಅಲ್ಲಿ ದ್ವಾದಶಾಕ್ಷರದ 'ಜಗತಿ'ಯನ್ನು ಬಳಸುತ್ತಾರೆ. ಕೃಷ್ಣ ಆದಿತ್ಯ ಮತ್ತು ರುದ್ರರ ಬಗ್ಗೆ ಹೇಳಿದ. ಈಗ ಇಲ್ಲಿ ವಸುಗಳ ಬಗ್ಗೆ ಹೇಳುತ್ತಾ ಹೇಳುತ್ತಾನೆ: "ವಸುಗಳಲ್ಲಿ 'ಅಗ್ನಿ' ನಾನು" ಎಂದು. ವಸುಗಳು ಎಂಟು ಮಂದಿ. ದ್ರೋಣ, ಪ್ರಾಣ, ಧ್ರುವ, ಅರ್ಕ, ಅಗ್ನಿ ದೋಷ, ವಸ್ತು ಮತ್ತು ವಿಭಾವಸು. ಇವರಿಗೆ ಇನ್ನೂ ಅನೇಕ ಹೆಸರಿದೆ. ಐದನೆಯವನಾದ ಅಗ್ನಿಗೆ ವೈಶ್ವಾನರ, ವಹ್ನಿ, ಜಾತವೇದ, ಹುತಾಶನ, ಪಾವಕ, ಅನಲ, ದಹನ ಇತ್ಯಾದಿ ಹೆಸರಿದೆ. ಇತರ ವಸುಗಳೆಲ್ಲರೂ ದೇವತಾ ತಾರತಮ್ಯದಲ್ಲಿ ಹದಿನೆಂಟನೇ ಕಕ್ಷೆಯಲ್ಲಿದ್ದರೆ, 'ಅಗ್ನಿ' ಅವರಿಗಿಂತ ಎತ್ತರದಲ್ಲಿ ಹದಿನೈದನೇ ಕಕ್ಷೆಯಲ್ಲಿದ್ದಾನೆ. ಭೂಸ್ತರದಲ್ಲಿ ಭಗವಂತನನ್ನು ಆರಾಧನೆ ಮಾಡುವ ಶ್ರೇಷ್ಠ ಪ್ರತೀಕ ಅಗ್ನಿ. ಇಡೀ ಜಗತ್ತನ್ನು ಪಾವನಗೊಳಿಸುವ ಶಕ್ತಿಯಾದ ಭಗವಂತ ಅಗ್ನಿಯಲ್ಲಿ 'ಪಾವಕಃ' ನಾಮಕನಾಗಿ ಕೂತು ಆತನಿಗೆ ಈ ಶ್ರೇಷ್ಠ ಸ್ಥಾನವನ್ನು ಕೊಟ್ಟ.

ಅಗ್ನಿಯಲ್ಲಿ ಭಗವಂತನ ತೇಜಸ್ಸಿದೆ. ತೇಜಸ್ಸಿನಲ್ಲಿ ಬೆಳಕಿನ ಶಕ್ತಿಯಿದೆ, ಶಾಖ ಕೊಡುವ ಶಕ್ತಿಯಿದೆ ಹಾಗೂ ಸುಡುವ ಶಕ್ತಿಯೂ ಇದೆ. ಇಷ್ಟೇ ಅಲ್ಲದೆ ಈ ತೇಜಸ್ಸಿನಲ್ಲಿ ಪಚನ ಶಕ್ತಿಯಿದೆ. ಅಗ್ನಿಯ ಸಂಪರ್ಕಕ್ಕೆ ಬರುವ ವಸ್ತು

ಪಾವನವಾಗುತ್ತದೆ. ಅಗ್ನಿಯಲ್ಲಿದ್ದು ಅಗ್ನಿಗೆ ಇಂತಹ ತೇಜಸ್ಸನ್ನು ಕೊಟ್ಟ ಭಗವಂತ ಜಗತ್ತನ್ನು ಪಾವನಗೊಳಿಸುವ ಪಾವಕಃ. ಎಲ್ಲರನ್ನು ಪಾವನಗೊಳಿಸುವ ಭಗವಂತ ದೇವತೆಗಳಿಗೂ ಕೂಡಾ ಅವಕ(ರಕ್ಷಕ).

ವಿತ್ತೇಶ ಕುಬೇರನ ಬಗ್ಗೆ ಹೇಳಿದ ಕೃಷ್ಣ ಮುಂದೆ ಭೂಮಿಯಲ್ಲಿ ಸಂಪತ್ತಿನ ನೆಲೆಯಾದ ಮೇರು ಪರ್ವತದಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ಮೇರು ಪರ್ವತವನ್ನು ಹೇಮಾದ್ರಿ(ಚಿನ್ನದ ಬೆಟ್ಟ) ಎಂದು ಕರೆಯುತ್ತಾರೆ. ಅದು ವಸುಗಳ ನೆಲೆ. ಕೃಷ್ಣ ಹೇಳುತ್ತಾನೆ: "ಬೆಟ್ಟಗಳಲ್ಲಿ ಮೇರು ನಾನು" ಎಂದು. ಹಿಮಾಲಯದಲ್ಲಿನ ಪರ್ವತ ಶ್ರೇಣಿಯಲ್ಲಿರುವ, ಮನುಷ್ಯ ಮಾತ್ರಕ್ಕೆ ಗೊತ್ತಿರದ ಸಂಪತ್ತಿನ ಬಗ್ಗೆ ಸ್ವಾಮಿರಾಮ್ ಅವರು **"Living with Himalayan Masters"** ಎನ್ನುವ ಪುಸ್ತಕದಲ್ಲಿ ತಮ್ಮ ಸ್ವಂತ ಅನುಭವವನ್ನು ಹಂಚಿಕೊಂಡಿದ್ದಾರೆ. ಯುದ್ಧದಲ್ಲಿ ಪೂರ್ಣ ಸಂಪತ್ತು ನಾಶವಾದಾಗ ಧರ್ಮರಾಯ ಬೆಟ್ಟಗಳ ಸಾಲಿನಲ್ಲಿ ಹುದುಗಿಟ್ಟ ಸಂಪತ್ತನ್ನು ತರಿಸಿ ಯಜ್ಞ ಮಾಡಿದ ಎಂದು ಮಹಾಭಾರತದಲ್ಲಿ ಹೇಳುತ್ತಾರೆ. ಈ ವಿಚಾರ ಹಿಮಾಲಯದಲ್ಲಿ ತಪಸ್ಸು ಮಾಡುವ ಕೆಲವು ಯೋಗಿಗಳಿಗೂ ತಿಳಿದಿದೆ. ಇಂತಹ ಸಂಪತ್ತಿನ ನೆಲೆ ಮೇರು.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಮೇರುಃ'. ಮಾ+ಈರು-ಮೇರು. ಸಮಸ್ತ ಚೈತನ್ಯದಲ್ಲಿ ಸರ್ವ ಶ್ರೇಷ್ಠಳಾದ ತಾಯಿ ಮಹಾಲಕ್ಷ್ಮಿಗೂ ಸಹ ಪ್ರೇರಕನಾಗಿ ನಿಂತಿರುವವ ಭಗವಂತ. ಇಂತಹ ಭಗವಂತನಿಗೆ ಇನ್ನೊಬ್ಬ ಪ್ರೆರಕನಿಲ್ಲ. ಆದ್ದರಿಂದ "ಮೇರುಃ" ಭಗವಂತನ ಅನ್ವರ್ಥನಾಮ.

ಪುರೋಧಸಾಂ ಚ ಮುಖ್ಯಂ ಮಾಂ ವಿದ್ಧಿ ಪಾರ್ಥ ಬೃಹಸ್ಪತಿಮ್ ।
ಸೇನಾನೀನಾಮಹಂ ಸ್ಕಂದಃ ಸರಸಾಮಸ್ಮಿ ಸಾಗರಃ ॥೨೪॥

ಪುರೋಧಸಾಮ್ ಚ ಮುಖ್ಯಮ್ ಮಾಮ್ ವಿದ್ಧಿ ಪಾರ್ಥ ಬೃಹಸ್ಪತಿಮ್ ।
ಸೇನಾನೀನಾಮ್ ಅಹಮ್ ಸ್ಕಂದಃ ಸರಸಾಮ್ ಅಸ್ಮಿ ಸಾಗರಃ -- ಓ ಪಾರ್ಥಾ, ಪುರೋಹಿತರಲ್ಲಿ ಹಿರಿಯನಾದ ಬೃಹಸ್ಪತಿ ನಾನು.[ಬೃಹತ್=ಹಿರಿಯರಿಗೂ, ಪತಿ=ಒಡೆಯನಾಗಿ 'ಬೃಹಸ್ಪತಿ'ಯಲ್ಲಿದ್ದೇನೆ.] ದಳವಾಯಿಗಳಲ್ಲಿ ಸ್ಕಂದ ನಾನು.[ಅರಿಗಳ ಬೀರವನ್ನು ಹೀರಿ 'ಸ್ಕಂದ' ಎನ್ನಿಸಿ ನಾನು ಸೇನಾಪತಿ 'ಸ್ಕಂದ'ನಲ್ಲಿದ್ದೇನೆ.] ನೀರಾಸರೆಗಳಲ್ಲಿ ಕಡಲು ನಾನು. [ಸಾ=ಸಾರವನ್ನು ಗರ=ಉಣ್ಣುವುದರಿಂದ, 'ಸಾಗರ' ಎನ್ನಿಸಿ ಕಡಲಿನಲ್ಲಿದ್ದೇನೆ.]

ನಾವು ಪೂಜಿಸುವ ಭಗವಂತನ ಪ್ರತೀಕವನ್ನು ಹೇಳಿದಮೇಲೆ ಎಲ್ಲವುದಕ್ಕೂ ಮುಖ್ಯವಾಗಿ ಬೇಕಾಗಿರುವ ಪುರೋಹಿತರ ಬಗ್ಗೆ ಇಲ್ಲಿ ಹೇಳಲಾಗಿದೆ. ಕೃಷ್ಣ ಹೇಳುತ್ತಾನೆ "ಪುರೋಹಿತರಲ್ಲಿ ನನ್ನ ಸನ್ನಿಧಾನವಿದೆ" ಎಂದು. ಋಗ್ವೇದದ ಪ್ರಥಮ ಸೂಕ್ತದಲ್ಲಿ ಹೇಳುವಂತೆ: " ಅಗ್ನಿಮೀ"ಳೇ ಪುರೋಹಿತಂ ಯಜ್ಞಸ್ಯ ದೇವಂ-ಋತ್ವಿಜಂ" | ಹೋತಾ"ರಂ ರತ್ನ ಧಾತಮಂ |". ಇಲ್ಲಿ ಹೇಳುವ 'ಹೋತಾ' ಋಗ್ವೇದದ ಪುರೋಹಿತ. ಹಿಂದೆ ಒಂದು ಯಾಗ ಮಾಡುವಾಗ ಅಲ್ಲಿ ಹದಿನಾರು ಮಂದಿ ಪುರೋಹಿತರಿರುತ್ತಿದ್ದರು. ಋಗ್ವೇದಕ್ಕೆ: 'ಹೋತಾ' ಪ್ರಧಾನ ಮತ್ತು ಆತನಿಗೆ ಮೂರು ಮಂದಿ(ಮೈತ್ರಾವರುಣ, ಅಚ್ಛಾವಾಕ, ಗ್ರಾಮಸ್ತುತ್) ಸಹಾಯಕರು. ಯಜುರ್ವೇದಕ್ಕೆ: ಅಧ್ವರ್ಯು ಪ್ರಧಾನ ಮತ್ತು ಆತನಿಗೆ ಮೂರು ಮಂದಿ(ಪ್ರತಿಪ್ರಸ್ಥತಾ, ನೇಷ್ಟಾ, ಉನ್ನೇತಾ) ಸಹಾಯಕರು. ಸಾಮವೇದಕ್ಕೆ: ಉದ್ಗಾತಾ ಪ್ರಧಾನ ಮತ್ತು ಆತನಿಗೆ ಮೂರು ಮಂದಿ(ಪ್ರಸ್ತೋತಾ, ಪ್ರತಿಹರ್ತಾ, ಸುಬ್ರಹ್ಮಣ್ಯ)

ಸಹಾಯಕರು. ಈ ಎಲ್ಲರ ಮೇಲ್ವಿಚಾರಕರಾಗಿ, ಯಜ್ಞದಲ್ಲಿ ಯಾವುದೇ ಲೋಪದೋಷ ಬರದಂತೆ ನೋಡಿಕೊಳ್ಳುವವರು ಸರ್ವವೇದ ಪಾರಂಗತ ಪ್ರಧಾನ ಪುರೋಹಿತರು. ಅವರಿಗೆ 'ಬ್ರಹ್ಮಾ' ಎಂದು ಹೆಸರು. ಇವರಿಗೂ ಮೂರು ಮಂದಿ(ಬ್ರಾಹ್ಮಣಾಇಚ್ಛಂಸಿ, ಅಗ್ನೀಧ್ರ, ಪೋತಾ) ಸಹಾಯಕರು. ಹೀಗೆ ಭಗವಂತನ ವಿಶೇಷ ಸನ್ನಿಧಾನವಿರುವ ಹದಿನಾರು ಮಂದಿ ಪುರೋಹಿತರು ಸೇರಿ ಯಜ್ಞ ನೆರವೇರಿಸುತ್ತಿದ್ದರು. ಪುರೋಹಿತರ ಸ್ಥಾನ ಸಮಾಜದಲ್ಲಿ ಅತ್ಯಂತ ಹಿರಿದು. ಆದರೆ ಇಂದಿನ ಪುರೋಹಿತರು ಹಿಂದಿನಷ್ಟು ಸ್ಥಾನಮಾನವನ್ನು ಸಮಾಜದಲ್ಲಿ ಗಳಿಸುತ್ತಿಲ್ಲ. ಪುರೋಹಿತರು ನಮಗೆ ಹಿತವಾದದ್ದನ್ನು ನಮ್ಮಿಂದ ಮೊದಲೇ ತಿಳಿದು ನಮ್ಮನ್ನು ತಿದ್ದಿ ಆ ದಾರಿಯಲ್ಲಿ ನಡೆಯುವಂತೆ ಮಾರ್ಗದರ್ಶನ ಮಾಡುವವರು. ನಮ್ಮ ಅಭಿವೃದ್ಧಿಗೆ ಪೂರಕವಾಗಿರತಕ್ಕಂತಹ ಕ್ರಿಯೆಗಳನ್ನು ಮಾಡಿ ನಾವು ಅಭಿವೃದ್ಧಿಹೊಂದುವಂತೆ ಮುಂಜಾಗ್ರತೆ ಕೊಡುವ ಗುರುಸ್ಥಾನದಲ್ಲಿರುವ ಸಲಹೆಗಾರರು. ಇಡೀ ಸಮಾಜಕ್ಕೆ ಇವರು ಮಾರ್ಗದರ್ಶಕರು. ಪೌರೋಹಿತ್ಯ ಬಹಳ ಜವಾಬ್ದಾರಿಯುತ ಕೆಲಸ. ಒಂದು ಧಾರ್ಮಿಕ ನಡೆಯಲ್ಲಿ ಸಂಶಯಬಂದಾಗ ಸಮಾಜಕ್ಕೆ ಮಾರ್ಗದರ್ಶಿಯಾಗಿ ಕೆಲಸ ಮಾಡುವ ಪುರೋಹಿತನ ಜವಾಬ್ದಾರಿ ಬಹಳ ದೊಡ್ಡದು. ಮಂತ್ರ ಹೇಳುವಾಗ ಯಾವುದಾದರು ಲೋಪವಾದರೆ, ತಪ್ಪು ಮಾಡಿದರೆ, ಅದಕ್ಕೆ ಪುರೋಹಿತ ಕಾರಣನಾಗುತ್ತಾನೆ. ಇಂತಹ ಜವಾಬ್ದಾರಿಯುತ ಕೆಲಸ ಪೌರೋಹಿತ್ಯ. ಆದ್ದರಿಂದ ಭಗವಂತನ ವಿಶೇಷ ಸನ್ನಿಧಾನ ಅಲ್ಲಿದೆ. ಭೂಮಿಯ ಎಲ್ಲಾ ಪುರೋಹಿತರಿಗಿಂತ ದೊಡ್ಡ ಪುರೋಹಿತರು ಇಬ್ಬರು. ದೈತ್ಯ ಪುರೋಹಿತರಾದ ಶುಕ್ರಾಚಾರ್ಯರು ಮತ್ತು ದೇವತೆಗಳ ಪುರೋಹಿತರಾದ ಬೃಹಸ್ಪತಿಯಾಚಾರ್ಯರು. ಬೃಹಸ್ಪತಿ ದೇವತಾ ತಾರತಮ್ಯದಲ್ಲಿ ಹತ್ತನೇ ಕಕ್ಷೆಯಲ್ಲಿದ್ದಾರೆ. ಇವರು ದೇವಲೋಕದಲ್ಲಿ ದೇವತೆಗಳಿಗೆ ಮತ್ತು ದೇವೇಂದ್ರನಿಗೆ ಸಲಹೆಗಾರರು. ದೇವತೆಗಳಿಗೆ ಪುರೋಹಿತರಾಗಿರುವ ಇವರಲ್ಲಿ ಭಗವಂತನ ವಿಶೇಷ ಸನ್ನಿಧಾನವಿದೆ. ದೇವತಾ ತಾರತಮ್ಯದಲ್ಲಿ ಎಂಟನೇ ಕಕ್ಷೆಯಲ್ಲಿರುವ ಇಂದ್ರ ಹತ್ತನೇ ಕಕ್ಷೆಯಲ್ಲಿರುವ ಬೃಹಸ್ಪತಿಯಾಚಾರ್ಯರಿಗೆ ನಮಸ್ಕರಿಸಿ ಅವರ ಮಾರ್ಗದರ್ಶನದಂತೆ ನಡೆಯಲು ಅವರಲ್ಲಿರುವ ಭಗವಂತನ ಸನ್ನಿಧಾನವೇ ಕಾರಣ. ಇದನ್ನು ನೆನಪಿಸುವಂತೆ ಕೃಷ್ಣ ದೇವೇಂದ್ರನ ಅವತಾರವಾದ ಅರ್ಜುನನನ್ನು ಇಲ್ಲಿ 'ಪಾರ್ಥ' ಎಂದು ಸಂಬೋಧಿಸಿದ್ದಾನೆ.

ಇನ್ನೊಂದು ಮುಖದಲ್ಲಿ ನೋಡಿದರೆ ವೇದಗಳಲ್ಲಿ ಬೃಹಸ್ಪತಿ ಎಂದರೆ ಪ್ರಾಣದೇವರು. ಸರಸ್ವತಿ ಭಾರತಿಯರ ಪತಿ-ಬೃಹಸ್ಪತಿಗಳು. ಇವರೇ ಬ್ರಹ್ಮ-ವಾಯು. ಇವರು ಸಮಸ್ತ ದೇವತೆಗಳಿಗೂ ಪುರೋಹಿತರು. ಭಗವಂತ ಪ್ರಾಣದೇವರಲ್ಲಿ ಗಾನದ(ಕಂಠಸಿರಿ) ವಿಶೇಷ ವಿಭೂತಿಯಾಗಿ ನೆಲೆಸಿದ್ದಾನೆ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಬೃಹಸ್ಪತಿ'. ಬೃಹತ್ ಅಂದರೆ ಹಿರಿಯರು, ಪತಿ ಅಂದರೆ ಒಡೆಯ. ಬ್ರಹ್ಮಾದಿ ಸಕಲ ದೇವತೆಗಳಿಗೂ ಒಡೆಯನಾದ, ಪುರೋಹಿತರಿಗೂ ಪುರೋಹಿತ ಭಗವಂತ 'ಬೃಹಸ್ಪತಿ'.

ಅಧ್ಯಾತ್ಮ ಯೋಧರಾದ ಪುರೋಹಿತರ ಬಗ್ಗೆ ಹೇಳಿದ ಕೃಷ್ಣ, ಈಗ ಯುದ್ಧದಲ್ಲಿ ವಿಜಯ ತಂದುಕೊಟ್ಟು ರಕ್ಷಣೆ ಮಾಡುವ ಯೋಧರಲ್ಲಿ ತನ್ನ ವಿಶೇಷ ವಿಭೂತಿಯನ್ನು ವಿವರಿಸುತ್ತಾನೆ. ದೇವತೆಗಳು ಬೃಹಸ್ಪತಿಯಾಚಾರ್ಯರ ಮಾರ್ಗದರ್ಶನದಲ್ಲಿ ಸಂಪಾದಿಸಿದ ಸಂಪತ್ತನ್ನು ಅಸುರರು ಅಪಹರಿಸಿದಾಗ, ಅವರ ವಿರುದ್ಧ ಹೋರಾಡಿ ಅದನ್ನು ಹಿಂದಕ್ಕೆ ತಂದುಕೊಟ್ಟವ ಸ್ಕಂದಃ. ಭಗವಂತ 'ಸ್ಕಂದಃ ನಾಮಕನಾಗಿ ಸೇನಾನಿಯಲ್ಲಿ ನಿಂತು ನಡೆಸುತ್ತಾನೆ. ಸ್ಕಂದನಿಗೆ ಸೇನಾಧಿಪತಿಯಾಗಿ ತಾರಕಾಸುರನನ್ನು ಸಂಹಾರ ಮಾಡುವಂತಹ ಶಕ್ತಿ ಕೊಟ್ಟಂತಹ, ಅಂತರಂಗದ ಒಳಗೆ ಕುಳಿತ ಅಂತರ್ಯಾಮಿ ತತ್ವ-ಭಗವಂತ. ಸೇನಾನಿಯ ಬಗ್ಗೆ ಹೇಳುವಾಗ ಇಲ್ಲಿ ಸೇನಾನಿಯಾಗಿ ಕೀರ್ತಿ

ಪಡೆದ ಕರ್ನಾಟಕದ ಹೆಮ್ಮೆಯ ಪುತ್ರ 'ಕಾರ್ಯಪ್ಪ' ಅವರನ್ನು ನೆನೆಸಿಕೊಳ್ಳಬಹುದು. ಭಗವಂತನ ವಿಶೇಷ ಸನ್ನಿದಾನದಿಂದಾಗಿ ಸೇನಾಧಿಪತಿಯಲ್ಲಿ ಅಂತಹ ವಿಶೇಷ ಶಕ್ತಿ ಬರುತ್ತದೆ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ ಸ್ಕಂದಃ. 'ಸ್ಕಂದಃ' ಎಂದರೆ ಇಡೀ ಜಗತ್ತನ್ನು ಸಂಹಾರ ಮಾಡುವ ಶಕ್ತಿ. "ಅರಿಗಳ ಬೀರವನ್ನು ಹೀರಿ 'ಸ್ಕಂದ' ಎನ್ನಿಸಿ ನಾನು ಸೇನಾಪತಿ 'ಸ್ಕಂದ'ನಲ್ಲಿದ್ದೇನೆ" ಎಂದಿದ್ದಾನೆ ಕೃಷ್ಣ.

ಮುಂದುವರಿದು ಕೃಷ್ಣ ಹೇಳುತ್ತಾನೆ: "ಸರಸಾಮಸ್ಮಿ ಸಾಗರಃ" ಎಂದು. ಭೂಮಿಯ ಮೇಲಿನ ಅಪಾರ ಸಂಪತ್ತಿನ ತಾಣ ಮೇರು ಪರ್ವತವಾದರೆ, ರಸದಿಂದ ಸಹಿತವಾದ, ಜಲಾಶಯಗಳಲ್ಲಿ ಬಹಳ ದೊಡ್ಡದಾಗಿರುವುದು ಸಾಗರ. "ಅದರಲ್ಲಿ ವಿಭೂತಿಯಾಗಿ ನಾನಿದ್ದೇನೆ" ಎನ್ನುತ್ತಾನೆ ಕೃಷ್ಣ. ಭೂಮಿಯ ಯಾವಭಾಗದಲ್ಲಿ ಬಾವಿ ತೋಡಿದರೂ ಸಿಹಿ ನೀರು. ಆದರೆ ಅಪರಂಪಾರವಾದ ಸಾಗರದ ನೀರು ಉಪ್ಪು. ಇದು ಏಕೆ ಎಂದು ನಮಗೆ ಗೊತ್ತಿಲ್ಲ. ರಷ್ಯಾದ ವಿಖ್ಯಾತ ಮನಃಶಾಸ್ತ್ರಜ್ಞ ವಿಲಿಕೋ^ಸ್ಕಿ(Velikovsky) ತನ್ನ 'Worlds in Collision' ಎನ್ನುವ ಪುಸ್ತಕದಲ್ಲಿ ಹೇಳುತ್ತಾನೆ: "ನಾವು ವಿಶ್ವದ ವಿಸ್ಮಯವನ್ನೆಲ್ಲಾ ಭೇದಿಸಿದ ಭ್ರಮೆಯಲ್ಲಿದ್ದೇವೆ, ಆದರೆ ನಮಗೆ ಏನೂ ಗೊತ್ತಿಲ್ಲ" ಎಂದು. ಇಂದು ಸಮುದ್ರದ ನೀರು ಉಪ್ಪು ಏಕೆ, ಬಾವಿಯ ನೀರು ಸಿಹಿ ಏಕೆ ಎನ್ನುವುದೂ ನಮಗೆ ಗೊತ್ತಿಲ್ಲ. ಭಗವಂತ ಇತರ ಎಲ್ಲಾ ರಸವನ್ನು ಹಣ್ಣಿನಲ್ಲಿಟ್ಟ. ಆದರೆ ರಸದ-ರಸ ಲವಣರಸ ಉಪ್ಪನ್ನು ಮಾತ್ರ ಯಾವ ಹಣ್ಣಿನಲ್ಲೂ ಇಡದೆ-ಸಮುದ್ರದ ನೀರಿನಲ್ಲಿಟ್ಟ. ಈ ಸಮುದ್ರ ಒಂದು ವಿಸ್ಮಯ. ಭೂಮಿ ಮೇಲಿನ ಪ್ರಾಣಿ ವೈವಿಧ್ಯಕ್ಕಿಂತ ಹೆಚ್ಚು ವೈವಿಧ್ಯ ಸಮುದ್ರದಲ್ಲಿದೆ. ಭಗವಂತ ಸಮುದ್ರವನ್ನು ಸೃಷ್ಟಿ ಮಾಡಿ ಅದರಲ್ಲಿ ಸಾಗರಃ ಶಬ್ದವಾಚ್ಯನಾಗಿ ತುಂಬಿದ್ದಾನೆ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ ಸಾಗರಃ. ಸಾರ+ಗರ-ಸಾಗರ. ಸಾರವಾಗಿರುವುದನ್ನು ಸ್ವೀಕರಿಸುವ ಭಗವಂತ ಸಾರಃ. ಎಲ್ಲಕ್ಕಿಂತ ಮಹತ್ತಾದ ಸಾರ-ಲವಣ, ಅದರಲ್ಲಿ ತುಂಬಿರುವ ಭಗವಂತ ಸಾಗರಃ. ಸಾರಂ ಗರತಿ ದದಾತೀತಿ ಸಾಗರಃ. ಜಗತ್ತಿಗೆ ಜೀವನದ ಸಾರ ಸರ್ವಸ್ವವನ್ನು ಕೊಡುವ ಭಗವಂತ ಸಾಗರಃ.

ಮಹರ್ಷೀಣಾಂ ಭೃಗುರಹಂ ಗಿರಾಮಸ್ಮ್ಯೇಕಮಕ್ಷರಮ್।
ಯಜ್ಞಾನಾಂ ಜಪಯಜ್ಞೋSಸ್ಮಿ ಸ್ಥಾವರಾಣಾಂ ಹಿಮಾಲಯಃ ॥೨೫॥

ಮಹಾ ಋಷೀಣಾಮ್ ಭೃಗುಃ ಅಹಮ್ ಗಿರಾಮ್ ಅಸ್ಮಿ ಏಕಮ್ ಅಕ್ಷರಮ್।

ಯಜ್ಞಾನಾಮ್ ಜಪಯಜ್ಞಃ ಅಸ್ಮಿ ಸ್ಥಾವರಾಣಾಮ್ ಹಿಮಾಲಯಃ –ಮಹರ್ಷಿಗಳಲ್ಲಿ ಭೃಗು ನಾನು. [ಕೆಟ್ಟವರನ್ನು ಸುಟ್ಟುರಿದು, 'ಭೃಗು' ಎನ್ನಿಸಿ, 'ಭೃಗು'ಮುನಿಯಲ್ಲಿದ್ದೇನೆ.] ವಾಙ್ಮಯಗಳಲ್ಲಿ ಓಂಕಾರವೆಂಬ ಒಂದಕ್ಷರ ನಾನು. [ಎಲ್ಲಕ್ಕಿಂತ ಮಿಗಿಲಾಗಿ 'ಏಕ' ಎನ್ನಿಸಿ, ಅಳಿವಿರದ್ದರಿಂದ 'ಅಕ್ಷರ' ಎನ್ನಿಸಿ ಓಂಕಾರವಾಚ್ಯನಾಗಿದ್ದೇನೆ.] ಯಜ್ಞಗಳಲ್ಲಿ ಜಪಯಜ್ಞ ನಾನು.[ಜ=ಹುಟ್ಟಿದ್ದನ್ನೆಲ್ಲಾ, ಪ=ಪಾಲಿಸುವುದರಿಂದ 'ಜಪ'ಎನ್ನಿಸಿ, ಎಲ್ಲರ ಎಲ್ಲಾ ಪೂಜೆಗಳನ್ನು ಕೊಳ್ಳುವುದರಿಂದ 'ಯಜ್ಞ'ಎನ್ನಿಸಿ ಜಪಯಜ್ಞದಲ್ಲಿದ್ದೇನೆ.] ಘನವಾದ ಬೆಟ್ಟಗಳಲ್ಲಿ ಹಿಮಾಲಯ ನಾನು. [ಹ್ರೀ=ಲಕ್ಷ್ಮಿಯ 'ಹ್ರೀ'ನಾಮಕ ರೂಪಕ್ಕೆ ಮತ್ತು ಮಾ='ಶ್ರೀ' ನಾಮಕ ರೂಪಕ್ಕೆ ಆಲಯ=ನೆಲೆಯಾದ್ದರಿಂದ 'ಹಿಮಾಲಯ' ಎನ್ನಿಸಿ ಹಿಮಗಿರಿಯಲ್ಲಿದ್ದೇನೆ.]

ಈ ಹಿಂದೆ ನಾವು ದೇವರ್ಷಿ ಬೃಹಸ್ಪತಿಯ ಬಗ್ಗೆ ನೋಡಿದೆವು. ಇವರು ದೇವಲೋಕಕ್ಕೆ ಸಂಬಂಧಪಟ್ಟವರು. ಇವರನ್ನು ಬಿಟ್ಟು ಇತರ ಮಹರ್ಷಿಗಳನ್ನು ನೋಡಿದರೆ-ಭಗವಂತನನ್ನು ಕಂಡ ವಿಶಿಷ್ಟರಲ್ಲಿ ಅತ್ಯಂತ ಶ್ರೇಷ್ಠರಾದವರು ಭೃಗು ಮಹರ್ಷಿಗಳು. ವಿಶ್ವಾಮಿತ್ರ-ವಸಿಷ್ಠರು ತಾರತಮ್ಯ ಕಕ್ಷೆಯಲ್ಲಿ ಹದಿನಾರನೇ ಸ್ಥಾನದಲ್ಲಿದ್ದರೆ, ಭೃಗುಮುನಿಗಳು ಇವರಿಂದ ಎತ್ತರದಲ್ಲಿ ಹದಿನೈದನೇ ಕಕ್ಷೆಯಲ್ಲಿ ಅಗ್ನಿಗೆ ಸಮಾನರಾಗಿದ್ದಾರೆ. ಇವರು ಭೂಮಿಯಲ್ಲಿ ಋಷಿಗಳ ಮಾಲಿಕೆಯಲ್ಲಿ ಹೊಸ ಆವಿಷ್ಕಾರ ಮಾಡಿದವರು. ಭಾಗವತದಲ್ಲಿ ಬರುವ ಒಂದು ಕಥೆಯಂತೆ ತ್ರಿಮೂರ್ತಿಗಳಲ್ಲಿ ಯಾರು ಅತ್ಯಂತ ಶ್ರೇಷ್ಟರು ಎಂದು ಅಳೆಯುವ ನಿಯೋಗಶ್ರೇಷ್ಠರಾಗಿ ಹೋಗಿ, 'ನಾರಾಯಣ' ಸರ್ವ ಶ್ರೇಷ್ಠ ಎಂದು ಜಗತ್ತಿಗೆ ಸಾರಿದ ಬಹಳ ದೊಡ್ಡ ಮುನಿ ಭೃಗು. ಈ ಕಥೆಯಲ್ಲಿ ಹೇಳುವಂತೆ-ನಿಯೋಗ ಶ್ರೇಷ್ಠರಾಗಿ ಭೃಗು ಮೊದಲು ಶಿವನಲ್ಲಿಗೆ, ನಂತರ ಬ್ರಹ್ಮನಲ್ಲಿಗೆ ಹೋಗುತ್ತಾರೆ. ಅಲ್ಲಿ ಅವರಿಗೆ ಯಾವ ಪುರಸ್ಕಾರವೂ ದೊರೆಯದಿದ್ದಾಗ, ಭೃಗು ಸಿಟ್ಟಿನಿಂದಲೇ ನಾರಾಯಣನಲ್ಲಿಗೆ ಹೋಗುತ್ತಾರೆ. ಅಲ್ಲಿ ವಿಷ್ಣು ಕೂಡಾ ಇವರನ್ನು ಗಮನಿಸದೇ ಇದ್ದಾಗ, ಸಿಟ್ಟಿನಿಂದ ವಿಷ್ಣುವಿನ ಎದೆಗೆ ಒದೆಯುತ್ತಾರೆ. ಆಗ ಭಕ್ತವತ್ಸಲ ನಾರಾಯಣ: "ನೀವು ಕರೆದಿದ್ದರೆ ನಾನು ಬರುತ್ತಿದ್ದೆ, ಈ ರೀತಿ ಒದೆದುದರಿಂದ ನಿಮ್ಮ ಕಾಲಿಗೆ ಅದೆಷ್ಟು ನೋವಾಯಿತೋ" ಎಂದು ಅವರ ಕಾಲನ್ನು ಉಜ್ಜಲು ಆರಂಭಿಸುತ್ತಾನೆ. ಆಗ ಭೃಗು ತನ್ನ ತಪ್ಪನ್ನು ಅರಿತು ನಾರಾಯಣನಲ್ಲಿ ಶರಣಾಗುತ್ತಾರೆ. ಈ ಕಥೆಯನ್ನು ನೋಡಿದಾಗ ನಮಗೆ ಈ ಮುನಿಗಳಿಗೆ ಭಗವಂತನ ಮಹತ್ವ ಗೊತ್ತಿರಲಿಲ್ಲವೇ ಎನ್ನುವ ಪ್ರಶ್ನೆ ಮೂಡುತ್ತದೆ. ಖಂಡಿತವಾಗಿ ಅವರಿಗೆ ಭಗವಂತನ ಪೂರ್ಣ ಮಹತ್ವ ತಿಳಿದಿತ್ತು. ಇದು ಕೇವಲ ಜನಸಾಮಾನ್ಯರಿಗೆ ಕ್ರಿಯೆಯ ಮೂಲಕ ವಿಷಯನ್ನು ತಿಳಿಸುವ ಒಂದು ಕಾರ್ಯ ಅಷ್ಟೆ. ಇದೇ ರೀತಿ "ನೀನು ಭೂಮಿಯ ಮೇಲೆ ಹತ್ತು ಬಾರಿ ಅವತಾರ ತಾಳು" ಎಂದು ಭಗವಂತನಿಗೆ ಶಾಪ ಕೊಟ್ಟವರು ಭೃಗು. ಅವರ ಶಾಪಕ್ಕೆ ಪುರಸ್ಕಾರ ಕೊಡುವುದಕ್ಕೆ ಭಗವಂತ ಭೂಮಿಯ ಮೇಲೆ ಹತ್ತು ಅವತಾರ ತಾಳಿದ. ಲಕ್ಷ್ಮಿ ಭಾರ್ಗವಿಯಾಗಿ ಭೃಗು ಮುನಿಯಲ್ಲಿ ಮಗಳಾಗಿ ಹುಟ್ಟಿದಳು. ಈ ರೀತಿ ಭೃಗುವಿನಲ್ಲಿ ಅನೇಕ ವೈಶಿಷ್ಟ್ಯವನ್ನು ಕಾಣುತ್ತೇವೆ. ಇದಕ್ಕೆಲ್ಲ ಕಾರಣ ಭೃಗುವಿನಲ್ಲಿ ಭಗವಂತನ ವಿಶೇಷ ಸನ್ನಿದಾನ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಭೃಗುಃ'. ಭರ್ಜನಾತ್ ಇತಿ ಭೃಗುಃ. ಪ್ರಳಯ ಕಾಲದಲ್ಲಿ ಎಲ್ಲವನ್ನೂ ಭರ್ಜನೆ ಮಾಡುವ ಭಗವಂತ, ಮುಖ್ಯವಾಗಿ ಭಕ್ತರ ಪಾಪವನ್ನು ಭರ್ಜನೆ(ನಾಶ)ಮಾಡುವ ಭೃಗುಃ. ಭಗವಂತ ತನ್ನ ಭಕ್ತರ ಜೀವನದಲ್ಲಿ ಅಡ್ಡಿ ಮಾಡುವ ದುಷ್ಟ ಶಕ್ತಿಗಳನ್ನು ಭರ್ಜನೆ ಮಾಡುವವ. ದುಷ್ಟರನ್ನು ಮತ್ತು ಅಧರ್ಮವನ್ನು ಭರ್ಜನೆ ಮಾಡಿ, ಧರ್ಮ ಸಂಸ್ಥಾಪನೆ ಮಾಡುವ ಭಗವಂತ ಭೃಗುಃ ಶಬ್ದ ವಾಚ್ಯ. ಋಷಿಗಳಲ್ಲಿ ಅತ್ಯಂತ ಎತ್ತರ ಸ್ಥಾನ ಭೃಗುವಿಗೆ ಬರುವಂತೆ ಮಾಡಿ, ಅವರಲ್ಲಿ ಭೃಗು ಶಬ್ದ ವಾಚ್ಯನಾಗಿ ಭಗವಂತ ಸನ್ನಿಹಿತನಾಗಿದ್ದಾನೆ.

ಋಷಿಗಳ ಬಗ್ಗೆ ಹೇಳಿದಾಗ ಋಷಿಗಳು ಭಗವಂತನಿಗೆ ಹತ್ತಿರ ಹೇಗಾದರು ಎನ್ನುವ ಪ್ರಶ್ನೆ ನಮ್ಮಲ್ಲಿ ಮೂಡುತ್ತದೆ. ಇದಕ್ಕೆ ಕಾರಣ- ಉಪಾಸನೆ, ಮಂತ್ರ-ಜಪ ಸಿದ್ಧಿ. ಕ್ಷತ್ರಿಯನಾದ ವಿಶ್ವಾಮಿತ್ರ ಕೂಡಾ ವೇದಮಂತ್ರ ಜಪ ಸಿದ್ಧಿಯಿಂದ ಬ್ರಹ್ಮರ್ಷಿಯಾದ. ಋಷಿಯಾಗಬೇಕಿದ್ದರೆ, ಋಷಿತ್ವ ಪಡೆಯಬೇಕಿದ್ದರೆ ಓಂಕಾರದ ಉಪಾಸನೆಯಿಂದ ಭಗವಂತನನ್ನು ಸಾಕ್ಷಾತ್ಕಾರಗಳಿಸಿಕೊಳ್ಳಬೇಕು. ಪ್ರಪಂಚದಲ್ಲಿರುವ ಅತ್ಯಂತ ಮಹತ್ವವಾದ ಮತ್ತು ಶ್ರೇಷ್ಠ ಶಬ್ದ ಓಂಕಾರ. ಈ ಓಂಕಾರದಲ್ಲಿ ಅಕ್ಷರಃ ನಾಮಕ ಭಗವಂತನ ವಿಶೇಷ ಸನ್ನಿದಾನವಿದೆ. ಓಂಕಾರ ಭಗವಂತನ ವಿಶೇಷ(Exclusive)ನಾಮ. [ಓಂಕಾರಕ್ಕೆ ಕೃಷ್ಣ ಇಷ್ಟು ಮಹತ್ವ ಏಕೆ ಕೊಟ್ಟ, ಓಂಕಾರದಲ್ಲಿರುವ ಅಸಾಧಾರಣ

ವೈಶಿಷ್ಟ್ಯ ಏನು ಎನ್ನುವುದರ ವಿಶೇಷ ಅರ್ಥ ವಿವರಣೆಯನ್ನು, ನಾವು ಏಳನೇ ಅಧ್ಯಾಯದಲ್ಲಿ ಈಗಾಗಲೇ ನೋಡಿದ್ದೇವೆ(ಅ-೭, ಶ್ಲೋಕ-೮)]. ಎಂದೂ ನಾಶವಿಲ್ಲದ(ಅ-ಕ್ಷರ) ಭಗವಂತ ಎಲ್ಲರಿಗಿಂತ ಹಿರಿದಾದ ಏಕಮಾತ್ರ ತತ್ವ. ಆದ್ದರಿಂದ ಆತ ಏಕಃ.

ಓಂಕಾರದ ನಂತರ ಇಲ್ಲಿ ಜಪಯಜ್ಞದ ಬಗ್ಗೆ ಕೃಷ್ಣ ವಿವರಿಸುತ್ತಾನೆ. "ಯಜ್ಞಾನಾಮ್ ಜಪಯಜ್ಞಃ ಅಸ್ಮಿ" ಎನ್ನುತ್ತಾನೆ ಕೃಷ್ಣ. ಎಲ್ಲಕ್ಕಿಂತ ದೊಡ್ಡ ಯಜ್ಞ ಅಂದರೆ ಜಪಯಜ್ಞ. ಹಿಂದೆ ಹೇಳಿದಂತೆ ಅಗ್ನಿ ಮುಖದಲ್ಲಿ ಮಾಡುವ ಪೂಜೆ ಮಾತ್ರ ಯಜ್ಞವಲ್ಲ. ಕೊಡುವಿಕೆ, ಪೂಜೆಯಂತಹ ಒಳ್ಳೆಯ ಕಾರ್ಯಕ್ಕೆ ಒಂದು ಕಡೆ ಸೇರುವಿಕೆ(ಸಂಗತೀಕರಣ), ಜ್ಞಾನದಾನ, ಅನ್ನದಾನ, ನಮ್ಮಲ್ಲಿ ಹೆಚ್ಚಿಗೆ ಇರುವುದನ್ನು ಇಲ್ಲದವರಿಗೆ ಹಂಚಿ ಬದುಕುವುದು, ಎಲ್ಲವೂ ಒಂದು ಯಜ್ಞವೇ. ಸಾಮಾನ್ಯವಾಗಿ ಯಜ್ಞದಲ್ಲಿ ಎರಡು ವಿಧ. ಒಂದು ಅಂತರಂಗ ಯಜ್ಞ ಇನ್ನೊಂದು ಬಾಹ್ಯಯಜ್ಞ. ಅಂತರಂಗದಲ್ಲಿ ಭಗವಂತನ ನಿರಂತರ ಪೂಜೆ(ದೇವಪೂಜಾ); ಚಿತ್ತ-ಮನಸ್ಸು ಭಗವಂತನ ಜೊತೆಗೆ ಸೇರುವುದು(ಸಂಗತೀಕರಣ) ಮತ್ತು ನಮ್ಮನ್ನು ನಾವು ಭಗವಂತನಿಗೆ ಅರ್ಪಿಸಿಕೊಳ್ಳುವುದು-ಪರಿಪೂರ್ಣವಾದ ಮಾನಸ ಯಜ್ಞ. ಈ ರೀತಿ ಮನಸ್ಸಿನಲ್ಲಿ ಮಾಡುವ ಜಪಯಜ್ಞ ಅತ್ಯಂತ ಶ್ರೇಷ್ಠ. ಇದಕ್ಕೆ ಕಾರಣ ಜಪಯಜ್ಞದಲ್ಲಿನ ಭಗವಂತನ ವಿಭೂತಿ.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಜಪಃ' ಮತ್ತು 'ಯಜ್ಞಃ'. ಜಗತ್ತಿನಲ್ಲಿ ಹುಟ್ಟಿಬರುವ ಪ್ರತಿಯೊಂದು ಜೀವವನ್ನು ಪಾಲಿಸುವ ಭಗವಂತ 'ಜಪಃ'. ಇಂತಹ ಭಗವಂತ ಎಲ್ಲರ ಎಲ್ಲಾ ಪೂಜೆಗಳನ್ನು ಕೊಳ್ಳುವುದರಿಂದ 'ಯಜ್ಞ'ಎನ್ನಿಸಿ ಜಪಯಜ್ಞದಲ್ಲಿದ್ದಾನೆ.

ಜಪದ ಬಗ್ಗೆ ಹೇಳಿದ ಮೇಲೆ, ಭೂಮಿಯ ಮೇಲೆ ಸಾತ್ವಿಕ ಕಂಪನ ಇರುವ ಅತ್ಯಂತ ಶ್ರೇಷ್ಠ ಸ್ಥಾವರದ ಬಗ್ಗೆ ಕೃಷ್ಣ ಹೇಳುತ್ತಾನೆ. ಹಿಂದೆ ಮನೆ ಕಟ್ಟುವಾಗ ಅಲ್ಲಿ ಹೆಚ್ಚು ಸಾತ್ವಿಕ ಕಂಪನ ಇರುವ ಸ್ಥಳದಲ್ಲಿ ದೇವರ ಕೋಣೆಯನ್ನು ನಿರ್ಮಿಸುತ್ತಿದ್ದರು. ಒಂದು ಊರಿನಲ್ಲಿ ಅತಿ ಹೆಚ್ಚು ಸಾತ್ವಿಕ ಕಂಪನ ಇರುವ ಸ್ಥಳದಲ್ಲಿ ದೇವಸ್ಥಾನ ನಿರ್ಮಿಸುತ್ತಿದ್ದರು. ಈ ಭೂಮಿಯಲ್ಲಿ ಅತಿ ಹೆಚ್ಚು ಸಾತ್ವಿಕ ಕಂಪನ ಇರುವ ಏಕ ಮಾತ್ರ ಸ್ಥಳ ಹಿಮಾಲಯ. ಇಲ್ಲಿ ಎಲ್ಲಿ ಕುಳಿತರೂ ನಮ್ಮ ಮನಸ್ಸು ಬಹು ಸುಲಭದಲ್ಲಿ ಭಗವಂತನಲ್ಲಿ ಶ್ರುತಿಗೂಡುತ್ತದೆ. ಹಿಮಾಲಯಕ್ಕೆ ಈ ಶಕ್ತಿ ಭಗವಂತನ ವಿಶೇಷ ಸನ್ನಿದಾನದಿಂದ ಬಂತು. ಭಗವಂತ 'ಹಿಮಾಲಯಃ' ನಾಮಕನಾಗಿ ಇಲ್ಲಿ ನೆಲೆಸಿದ್ದಾನೆ. ಭಗವಂತನ ಈ ವಿಭೂತಿನಾಮಕ್ಕೆ ವಿಶೇಷ ಅರ್ಥವಿದೆ. ಹ್ರೀ+ಮಾ+ಆಲಯ=ಹಿಮಾಲಯ. ಹ್ರೀ ಅಂದರೆ ಶ್ರೀಲಕ್ಷ್ಮಿ, ಮಾ ಅಂದರೆ ಭೂದೇವಿ. ಶ್ರೀದೇವಿ ಮತ್ತು ಭೂದೇವಿಯರ ಆಲಯನಾದ ಭಗವಂತ ಹಿಮಾಲಯಃ. ಭಗವಂತನ ಈ ವಿಶೇಷ ವಿಭೂತಿಯಿಂದಾಗಿ ಹಿಮಾಲಯದ ಕಣಕಣವೂ ಅಧ್ಯಾತ್ಮದ ವಿಸ್ಮಯದಿಂದ ತುಂಬಿದೆ. ಮನುಷ್ಯನ ಮನಃಪರಿವರ್ತನೆ ಮಾಡಿ ಆತನನ್ನು ಅಧ್ಯಾತ್ಮದತ್ತ ತಿರುಗಿಸುವ ವಿಶೇಷಶಕ್ತಿ ಹಿಮಾಲಯಕ್ಕಿದೆ. ವೇದವ್ಯಾಸರು, ನರ-ನಾರಾಯಣರು, ಆಚಾರ್ಯ ಮಧ್ವರು ನೆಲೆಸಿರುವ ತಾಣ ಹಿಮಾಲಯ. ಅನೇಕ ದೇವತೆಗಳು ನೆಲೆಸಿರುವ ನಿಗೂಢ ತಾಣ ಈ ಹಿಮಾಲಯ. ಭಗವಂತನ ವಿಭೂತಿ ಈ ನೆಲಕ್ಕೆ ಈ ಅದ್ಭುತ ಶಕ್ತಿಯನ್ನು ತಂದುಕೊಟ್ಟಿದೆ.

ಅಶ್ವತ್ಥಃ ಸರ್ವವೃಕ್ಷಾಣಾಂ ದೇವರ್ಷೀಣಾಂ ಚ ನಾರದಃ ।
ಗಂಧರ್ವಾಣಾಂ ಚಿತ್ರರಥಃ ಸಿದ್ಧಾನಾಂ ಕಪಿಲೋ ಮುನಿಃ ॥೨೬॥

ಅಶ್ವತ್ಥಃ ಸರ್ವ ವೃಕ್ಷಾಣಾಮ್ ದೇವರ್ಷೀಣಾಮ್ ಚ ನಾರದಃ ।
ಗಂಧರ್ವಾಣಾಮ್ ಚಿತ್ರರಥಃ ಸಿದ್ಧಾನಾಮ್ ಕಪಿಲಃ ಮುನಿಃ -ಎಲ್ಲಾ ಮರಗಳಲ್ಲಿ ಅರಳಿಮರ ನಾನು.[ಅಶ್ವ=ಕುದುರೆಯ ರೂಪದಲ್ಲಿ ಸ್ಥ=ಇದ್ದುದರಿಂದ, 'ಅಶ್ವತ್ಥ' ಎನಿಸಿ ಅರಳಿಮರದಲ್ಲಿದ್ದೇನೆ.] ದೇವಲೋಕದ ಋಶಿಗಳಲ್ಲಿ ನಾರದ ನಾನು. [ನಾರ=ನರರ ಬಯಕೆಯೆಲ್ಲವನ್ನು ದ=ಕೊಡುವವನಾಗಿ 'ನಾರದ' ಎನ್ನಿಸಿ ನಾರದನಲ್ಲಿದ್ದೇನೆ.] ಗಂಧರ್ವರ ದೊರೆ ಚಿತ್ರರಥ ನಾನು. [ಚಿತ್ರ=ಅಚ್ಚರಿಯ, ರಥ=ತೇರಿನಲ್ಲಿ ಚರಿಸುವುದರಿಂದ 'ಚಿತ್ರರಥ' ಎನ್ನಿಸಿ ಗಂದರ್ವ ರಾಜ ಚಿತ್ರರಥನಲ್ಲಿದ್ದೇನೆ.] ಯೋಗಸಿದ್ಧರಲ್ಲಿ[ಕ=ಸುಖರೂಪನಾಗಿ, ಪಿ=ಪಾಲಿಸುವುದರಿಂದ, ಮತ್ತು ಲ=ಲಯಗೊಳಿಸುವುದರಿಂದ] ಕಪಿಲ ಮುನಿ ನಾನು.

ಕೃಷ್ಣ ಹೇಳುತ್ತಾನೆ: "ಸರ್ವ ವೃಕ್ಷಗಳಲ್ಲಿ ಅಶ್ವತ್ಥ ನಾನು" ಎಂದು. ಅಶ್ವತ್ಥಮರ ಇಂದು ಮೇಲ್ನೋಟದಲ್ಲಿ ನೋಡುವವರಿಗೆ ಯಾವುದಕ್ಕೂ ಉಪಯೋಗವಿಲ್ಲದ ಮರ. ಭಗವಂತ ಈ ಮರಕ್ಕೆ ಮಹತ್ವ ಕೊಟ್ಟು ಹೇಳದಿದ್ದರೆ ಈ ಮರದ ಬಗ್ಗೆ ನಮಗೆ ಏನೂ ತಿಳಿದಿರುತ್ತಿರಲಿಲ್ಲ. ಏಕೆಂದರೆ ಈ ಮರ ನಮಗೆ ತಿನ್ನುವ ಹಣ್ಣನ್ನಾಗಲಿ, ಸುಗಂಧವಾದ ಹೂವನ್ನಾಗಲೀ ಕೊಡುವುದಿಲ್ಲ. ಈ ಮರದಿಂದ ಪೀಠೊಪಕರಣ ಮಾಡಲು ಸಾಧ್ಯವಿಲ್ಲ. ವಿಶಾಲವಾಗಿ ಬೆಳೆದು ತನ್ನ ಸುತ್ತಲಿನ ಪ್ರದೇಶವನ್ನು ಆಕ್ರಮಿಸಿ ನಿಲ್ಲುವ ಈ ಮರ, ಮೇಲ್ನೋಟಕ್ಕೆ ಜನರಿಗೆ ಕಾಟ ಕೊಡುವ ಮರ! ಆದರೆ ಇಲ್ಲಿ ಕೃಷ್ಣ ಹೇಳುತ್ತಾನೆ: "ವೃಕ್ಷಗಳ ಸಮುದಾಯದಲ್ಲಿ ಶ್ರೇಷ್ಠ ವೃಕ್ಷ ಅಶ್ವತ್ಥ" ಎಂದು. ಏಕೆ ಈ ಮರಕ್ಕೆ ಇಷ್ಟು ಪ್ರಾಧಾನ್ಯತೆ ಎನ್ನುವುದು ತಿಳಿಯದೇ ಇಂದು ನಾವು ಅದನ್ನು ಪೂಜಿಸುತ್ತೇವೆ ಅಥವಾ ಇನ್ನು ಕೆಲವರು ನಿರ್ಲಕ್ಷಿಸುತ್ತಾರೆ. ಈ ಮರವನ್ನು ನೆಟ್ಟರೆ ಪುಣ್ಯಬರುತ್ತದೆ ಎನ್ನುವ ಕಾರಣಕ್ಕೆ ಮನೆಯಿಂದ ದೂರದಲ್ಲಿ ಎಲ್ಲೋ ದೇವಸ್ಥಾನದಲ್ಲಿ ಅರಳಿ ಮರ ನೆಡುವುವವರಿದ್ದಾರೆ. ಇಂದು ಈ ಮರದ ಮಹತ್ವ ಹೆಚ್ಚಿನವರಿಗೆ ತಿಳಿದಿಲ್ಲ. ಹಿಂದಿನವರು ಆಲ, ಅರಳಿ ಮತ್ತು ಅತ್ತಿ ಈ ಮೂರು ಮರಗಳಿಗೆ ಬಹಳ ಮಹತ್ವ ಕೊಟ್ಟರು. [ಬೇಂದ್ರೆಯವರು ತಮ್ಮ ತೋಟದಲ್ಲಿ ಮೂಡಿಬಂದ ಈ ಮೂರು ಗಿಡಗಳನ್ನು ನೋಡಿ- "ನಮ್ಮ ತೋಟದಲ್ಲಿ ಭಗವಂತ ಮೂರು ರೂಪದಲ್ಲಿ ಬಂದಿದ್ದಾನೆ" ಎಂದು ಹೃದಯತುಂಬಿ ಹೇಳಿದ್ದನ್ನು ಇಲ್ಲಿ ಬನ್ನಂಜೆಯವರು ನೆನಪಿಸಿಕೊಂಡಿದ್ದಾರೆ]. ಹಿಂದೆ ಯಜ್ಞ ಮಾಡುವಾಗ ಶಮಿ ಮತ್ತು ಅರಣಿ(ಅರಳಿ) ಸಮಿತೆಯನ್ನು ಮಥನ ಮಾಡಿ ಅದರಿಂದ ಅಗ್ನಿ ಕಿಡಿ ತರಿಸಿ, ಅಗ್ನಿ ಸೃಷ್ಟಿ ಮಾಡುತ್ತಿದ್ದರು. ಯಜ್ಞದಲ್ಲಿ ಅರಳಿಯ ಸಮಿತೆಯನ್ನು ಮುಖ್ಯವಾಗಿ ಉಪಯೋಗಿಸುತ್ತಾರೆ. ಅಶ್ವತ್ಥಮರದ ಸಮಿತೆಯನ್ನು ಕಾಷ್ಟವಾಗಿ ಯಜ್ಞದಲ್ಲಿ ಉಪಯೋಗಿಸಿದರೆ, ಅಲ್ಲಿ ಉರಿಯುವ ಬೆಂಕಿಯ ಜ್ವಾಲೆಯಲ್ಲಿ ಒಂದು ವಿಶಿಷ್ಟ ಶಕ್ತಿ ಹೊರ ಹೊಮ್ಮುತ್ತದೆ. ಹೇಗೆ ಸೂರ್ಯನ ಕಿರಣದಲ್ಲಿ ಏಳು ಬಣ್ಣವಿದೆಯೋ ಹಾಗೇ ಅಗ್ನಿಯಲ್ಲಿ ಏಳು ಬಣ್ಣವಿದೆ. ಮುಂಡಕ ಉಪನಿಷತ್ತಿನಲ್ಲಿ ಅಗ್ನಿಯ ಜ್ವಾಲೆಯಿಂದ ಹೊಮ್ಮುವ ಏಳು ಬಣ್ಣವನ್ನು ಕಾಳಿ, ಕರಾಳಿ, ಮನೋಜವಾಚ, ಸುಲೋಹಿತಾಯಾಚ, ಸುಧೂಮ್ರವರ್ಣಾ, ಸ್ಫುಲಿಂಗಿನೀ, ವಿಶ್ವರುಚಿ ಎಂದು ಕರೆದಿದ್ದಾರೆ. ಅಗ್ನಿಯ ಈ ಏಳು ಬಣ್ಣವನ್ನು ಸೂರ್ಯ ಕಿರಣದ ಏಳು ಬಣ್ಣದೊಂದಿಗೆ ಸಂಕ್ರಾಂತಗೊಳಿಸಿ ವಾತಾವರಣದಲ್ಲಿ ಅದರ ಪ್ರಭಾವ ತರುವುದೇ ಯಜ್ಞ. ಈ ಕ್ರಿಯೆಗೆ ಅಶ್ವತ್ಥಸಮಿತೆ ಒಂದು ಪ್ರಮುಖ ಸಾಧನ.
ಇಂದು ಹಲವರು ಅಶ್ವತ್ಥಮರದಲ್ಲಿ ದೇವತಾ ಸನ್ನಿಧಾನವಿದೆ ಎಂದು ಅದಕ್ಕೆ ಪ್ರದಕ್ಷಿಣೆ ಬರುತ್ತಾರೆ. ಮಕ್ಕಳಾಗದಿದ್ದಾಗ ಜ್ಯೋತಿಷಿಗಳು ಅಶ್ವತ್ಥ ಪ್ರದಕ್ಷಿಣೆ ಬರುವಂತೆ ಹೇಳುತ್ತಾರೆ. ಇದು ಏಕೆ ಎನ್ನುವ ಕಲ್ಪನೆ ಇಲ್ಲದ ಜನ ಇದೆಲ್ಲವೂ ಮೂಢನಂಬಿಕೆ ಎಂದು ಮಾತನಾಡಿಕೊಳ್ಳುತ್ತಾರೆ. ಜಗತ್ತಿನಲ್ಲಿರುವ ಎಲ್ಲಾ ಮರಗಳಿಗಿಂತ ಹೆಚ್ಚು

ಆಮ್ಲಜನಕ ಕೊಡುವ ವೃಕ್ಷ ಅಶ್ವತ್ಥ. ಇಂತಹ ಶುದ್ಧ ವಾಯುವಿನ ಉಸಿರಾಟದಿಂದ ಗರ್ಭದೋಷ ಸರಿಹೋಗುವ ಸಾಧ್ಯತೆ ಇದೆ ಎಂದು ಇಂದು ವಿಜ್ಞಾನ ಕೂಡಾ ಒಪ್ಪಿಕೊಂಡಿದೆ. ಹಿಂದಿನ ಕಾಲದಲ್ಲಿ ಋಷಿಗಳು ಅಶ್ವತ್ಥ ಮರದ ಬುಡದಲ್ಲಿ ಕುಳಿತು ವೇದಾಧ್ಯಾಯನ ಮಾಡುತ್ತಿದ್ದರು. ಹೀಗೆ ಅಶ್ವತ್ಥ ಮರದಲ್ಲಿ ಭಗವಂತನ ವಿಶೇಷ ವಿಭೂತಿ ಆ ಮರಕ್ಕೆ ಇಂತಹ ಅನೇಕ ವಿಶೇಷ ಶಕ್ತಿಯನ್ನು ಕೊಟ್ಟಿದೆ.

ಇಲ್ಲಿ ಬಂದಿರುವ ಭಗವಂತನ ನಾಮ 'ಅಶ್ವತ್ಥಃ'. ವೇದವನ್ನು ಉಪದೇಶ ಮಾಡಿದ ಭಗವಂತನ ವಿಶೇಷ ಅವತಾರ ಅಶ್ವರೂಪ ಹಯಗ್ರೀವ. ಅಶ್ವದ ಹಾಗೆ ಇದ್ದು ವೇದೋಪದೇಶ ಮಾಡಿದ ಭಗವಂತನನ್ನು 'ಅಶ್ವತ್ಥಃ' ಎಂದು ಕರೆಯುತ್ತಾರೆ.

ಮುಂದುವರಿದು ಕೃಷ್ಣ ಹೇಳುತ್ತಾನೆ "ದೇವರ್ಷೀಣಾಂ ಚ ನಾರದಃ" ಎಂದು. ನಾರದ ಗಂಧರ್ವರಲ್ಲಿ ಒಬ್ಬ. ಆದರೆ ಭಗವಂತನ ವಿಶೇಷ ಸನ್ನಿಧಾನದಿಂದ ಆತ ತುಂಬಾ ಎತ್ತರಕ್ಕೇರಿ ದೇವರ್ಷಿಯಾದ. ನಾರದ ಭಗವಂತನನ್ನು ಪಡೆದದ್ದು ಮಹಾ ಸಾಧನೆಯಿಂದ. ಹಿಂದಿನ ಬ್ರಹ್ಮಕಲ್ಪದಲ್ಲಿ ನಾರದ ಒಂದು ಬಡ ಕುಟುಂಬದಲ್ಲಿ ಹುಟ್ಟಿದ್ದ. ಆತನ ತಾಯಿ ಋಷಿ-ಮುನಿಗಳ ಆಶ್ರಮದಲ್ಲಿ ಕೆಲಸ ಮಾಡಿಕೊಂಡು ಬದುಕುತಿದ್ದಳು. ಪುಟ್ಟ ಮಗುವಾಗಿದ್ದ ಈತ ಋಷಿಗಳ ಅಧ್ಯಾತ್ಮ ಸಂಭಾಷಣೆಯನ್ನು ಕೇಳುತ್ತಾ ಬೆಳೆದ. ಈತ ಐದು ವರ್ಷದವನಿದ್ದಾಗ ಆತನ ತಾಯಿ ಹಾವು ಕಚ್ಚಿ ಸಾಯುತ್ತಾಳೆ. ತಿಳಿದವರು ಹೇಳುವಂತೆ- "ನಮಗೆ ದೇವರೇ 'ನಾಥ' ಎಂದು ಗೊತ್ತು ಮಾಡಿಸಲು ಭಗವಂತ ನಮ್ಮನ್ನು ಮೊದಲು 'ಅನಾಥ' ಮಾಡುತ್ತಾನೆ". ಹಾಗೆ ಅನಾಥನಾದ ಈತ ತನ್ನ ಐದನೇ ವರ್ಷದಿಂದಲೇ, ಋಷಿಗಳಿಂದ ತಿಳಿದ ಜ್ಞಾನದಿಂದ ಸಾಧನೆ ಆರಂಭಿಸುತ್ತಾನೆ. ಆದರೆ ಆತನಿಗೆ ಆ ಜನ್ಮದಲ್ಲಿ ಭಗವಂತನ ದರ್ಶನವಾಗುವುದಿಲ್ಲ. ಆದರೆ ಆತ ಭಗವಂತನ ವಾಣಿಯನ್ನು 'ಕೇಳಿದ'. "ಈ ಜನ್ಮದಲ್ಲಿ ನನ್ನನ್ನು ಕಾಣುವ ಪ್ರಯತ್ನ ಮಾಡಬೇಡ. ನೀನು ಮುಂದಿನ ಕಲ್ಪದಲ್ಲಿ ಸದಾ ನನ್ನನ್ನು ಕಾಣುವೆ" ಎಂದು. ನಂತರ ಈತ ಈ ಬ್ರಹ್ಮಕಲ್ಪದಲ್ಲಿ ನಾರದನಾಗಿ ಹುಟ್ಟಿ ಭಗವಂತನ ಮಹಾ ಅನುಗ್ರಹಕ್ಕೆ ಪಾತ್ರನಾದ.

ನಾರದರು ನಮ್ಮ ಅಂತಃಪ್ರಜ್ಞೆಯ ಅಭಿಮಾನಿ ದೇವತೆ. ಹಿಂದಿನ ಕಾಲದ ಕಥೆಗಳಲ್ಲಿ ಕಾಣುವಂತೆ ಯಾವುದಾದರು ಒಳ್ಳೆಯ ಕೆಲಸವಾಗಬೇಕಾದರೆ ಅಲ್ಲಿ ನಾರದರು ಬಂದು ಹೇಳಿ ಹೋಗುತ್ತಿದ್ದರು. ಉದಾಹರಣೆಗೆ ವಾಲ್ಮೀಕಿಗೆ ರಾಮಾಯಣ ಬರೆಯುವಂತೆ ಹೇಳಿ ಹೋದವರು ನಾರದರು. ಇಲ್ಲಿ ನಮಗೆ ಒಂದು ಪ್ರಶ್ನೆ ಬರುತ್ತದೆ. ಈಗ ಏಕೆ ನಾರದರು ಬರುವುದಿಲ್ಲ, ಏಕೆ ನಮಗೆ ಮಾರ್ಗದರ್ಶನ ಸಿಗುವುದಿಲ್ಲ ಎಂದು. ನಾರದರನ್ನು ನಾವು ಕರೆದರೆ ಖಂಡಿತ ಇವತ್ತಿಗೂ ಬರುತ್ತಾರೆ! 'ನಾರದ' ಅಂದರೆ ನಮ್ಮ ಅಂತರಂಗದ ಧ್ವನಿ(intuitional flash). ನಾವು ನಮ್ಮ ಆತ್ಮದ ಕರೆಗೆ ಕಿವಿ ಕೊಟ್ಟರೆ ಅಲ್ಲಿ ನಾರದರು ಮಾತನಾಡುತ್ತಾರೆ. ನಾವು ನಮ್ಮ ಒಳಗಿನ ಸಂದೇಶವನ್ನು ಆಲಿಸಲು ಅಭ್ಯಾಸ ಮಾಡಿದರೆ ಆಗ ನಮ್ಮ ಆಜ್ಞಾಚಕ್ರ ತೆರೆದುಕೊಳ್ಳುತ್ತದೆ. ಇದರಿಂದ 'ಈ ರೀತಿ ಮಾಡು' ಎನ್ನುವ ಸಂದೇಶ(Divine Message) ಬರುತ್ತದೆ. ಇದೇ ಅಶರೀರವಾಣಿ ಅಥವಾ ಅಂತಃರ್ವಾಣಿ. ಇದೇ ನಾರದ. ಪ್ರತ್ಯಕ್ಷ ಕಾಣಲಾಗದಿದ್ದರೂ ಕೂಡಾ ಅವರನ್ನು ಕೇಳಬಹುದು. ನಾರದರಿಗೆ ಈ ಎಲ್ಲಾ ವಿಶಿಷ್ಟ ಶಕ್ತಿ ಭಗವಂತನ ವಿಶೇಷ ಸನ್ನಿಧಾನದಿಂದ ಬಂತು.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ನಾರದಃ'. ನರರ ಅಜ್ಞಾನವನ್ನು ಕಳೆದು(ನಾರ-ದ್ಯತಿ), ಅವರು ಬಯಸಿದ್ದನ್ನು ಧಾರೆ ಎರೆಯುವ(ನಾರ-ದದಾತಿ) ಭಗವಂತ ನಾರದಃ.

ನಾರದರ ನಂತರ ಗಂಧರ್ವರಲ್ಲಿ ತನ್ನ ವಿಶೇಷ ವಿಭೂತಿಯನ್ನು ಕೃಷ್ಣ ವಿವರಿಸುತ್ತಾನೆ. ಕೃಷ್ಣ ಹೇಳುತ್ತಾನೆ "ಗಂಧರ್ವರಲ್ಲಿ ಚಿತ್ರರಥ ನಾನು" ಎಂದು. ದೇವಲೋಕದ ಪರಿಚಾರಿಕೆ ಮಾಡುವ ಉಪದೇವತಾ ಗಣ ಗಂಧರ್ವರು. ಇವರು ಅವಾಂತರ ದೇವತೆಗಳು. ಈ ಗಣದ ರಾಜ ಚಿತ್ರರಥ. 'ರಾಜಾ ಪ್ರತ್ಯಕ್ಷ ದೇವತಾ' ಎನ್ನುವಂತೆ ಭಗವಂತ ಚಿತ್ರರಥನಲ್ಲಿ ವಿಶೇಷ ವಿಭೂತಿಯಾಗಿ ಸನ್ನಿಹಿತನಾಗಿದ್ದಾನೆ. ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಚಿತ್ರರಥಃ'. ವಿಚಿತ್ರವಾದ ರಥ ಉಳ್ಳ ಭಗವಂತ ಚಿತ್ರರಥಃ. ಭಗವಂತನ ವಾಹನ-ಗರುಡ. ಇದು ಇತರ ಎಲ್ಲಾ ವಾಹನಗಳಿಗಿಂತ ವಿಶಿಷ್ಟ. ಇಂತಹ ರಥದಲ್ಲಿ ಸಂಚರಿಸುವ ಭಗವಂತ ಚಿತ್ರರಥಃ.

ಕೃಷ್ಣ ಹೇಳುತ್ತಾನೆ "ಸಿದ್ಧಾನಾಂ ಕಪಿಲೋ ಮುನಿಃ" ಎಂದು. ಇತಿಹಾಸದಲ್ಲಿ ಇಬ್ಬರು ಕಪಿಲಮುನಿಗಳು ಬರುತ್ತಾರೆ. ಇವರಿಬ್ಬರೂ ಸಾಂಖ್ಯವನ್ನು ಹೇಳಿದವರು. ಆದರೆ ಒಬ್ಬ ಭಗವಂತನನ್ನು ನಂಬದವ. ಆದ್ದರಿಂದ ಇಲ್ಲಿ ಬಂದಿರುವ ಕಪಿಲಮುನಿ-ಕಪಿಲ ವಾಸುದೇವ. ಸಾಂಖ್ಯವನ್ನು ಮೂಲತಃ ಜಗತ್ತಿಗೆ ಕೊಟ್ಟ ಸಾಕ್ಷಾತ್ ಭಗವಂತನ ಅವತಾರ. ಸ್ವಾಯಂಭುವ ಮನುವಿನ ಮಗಳು ದೇವಭೂತಿ ಹಾಗೂ ಕರ್ದಮ ಪ್ರಜಾಪತಿಯ ದಾಂಪತ್ಯ ಫಲದಲ್ಲಿ ಮೂಡಿಬಂದ ಭಗವಂತನ ಅವತಾರ. ವೇದವ್ಯಾಸರು ಕೂಡಾ ಕಪಿಲ ಹೇಳಿರುವುದನ್ನೇ ನಮ್ಮ ಮುಂದೆ ಪ್ರಸ್ತುತಿ ಮಾಡಿರುವುದು. ಹೊಸತನ್ನು ಜಗತ್ತಿಗೆ ಕೊಟ್ಟ ಭಗವಂತನ ಅವತಾರ 'ಕಪಿಲಾವತಾರ'.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ 'ಕಪಿಲಃ'. ಕ-ಪಿ-ಲ; ಇಡೀ ಜಗತ್ತನ್ನು ಪಾಲಿಸುವ(ಪಿ), ಮತ್ತು ಲಯಗೊಳಿಸುವ(ಲ), ಆನಂದಮೂರ್ತಿ(ಕ) ಭಗವಂತ ಕಪಿಲಃ. ಸದಾ ಆನಂದವನ್ನು ಪಾನಮಾಡುವ, ಅದ್ಭುತವಾದ ಸಾಂಖ್ಯದ ಮೂಲಕ ವಿಶ್ವದ ರಹಸ್ಯವನ್ನು ತೆರೆದಿಟ್ಟ ಭಗವಂತ 'ಕಪಿಲಃ'.

ಋಷಿ, ಬ್ರಹ್ಮರ್ಷಿ, ದೇವರ್ಷಿ, ಮಹರ್ಷಿಗಳು ಹೀಗೆ ಬ್ರಹ್ಮ ತೇಜಸ್ಸು ಮತ್ತು ಅವರು ಮಾಡುವ ವೇದಾಧ್ಯಾಯನ, ತಪಸ್ಸು, ಯಜ್ಞ-ಎಲ್ಲದರ ಬಗ್ಗೆ ಹೇಳಿದ ಕೃಷ್ಣ, ಮುಂದಿನ ಶ್ಲೋಕದಲ್ಲಿ ಕ್ಷಾತ್ರತೇಜಸ್ಸಿನ ಬಗ್ಗೆ ಹೇಳುತ್ತಾನೆ.

ಉಚ್ಚೈಃಶ್ರವಸಮಶ್ವಾನಾಂ ವಿದ್ಧಿ ಮಾಮಮೃತೋದ್ಭವಮ್ ।
ಐರಾವತಂ ಗಜೇಂದ್ರಾಣಾಂ ನರಾಣಾಂ ಚ ನರಾಧಿಪಮ್ ॥೨೭॥

ಉಚ್ಚೈಃಶ್ರವಸಮ್ ಅಶ್ವಾನಾಮ್ ವಿದ್ಧಿ ಮಾಮ್ ಅಮೃತ ಉದ್ಭವಮ್ ।

ಐರಾವತಮ್ ಗಜೇಂದ್ರಾಣಾಮ್ ನರಾಣಾಮ್ ಚ ನರಾಧಿಪಮ್–ಕುದುರೆಗಳಲ್ಲಿ ಕಡಲಲ್ಲಿ ಮೂಡಿಬಂದ ಉಚ್ಚೈಃಶ್ರವಸ್ಸನ್ನು, ಹಿರಿಯಾನೆಗಳಲ್ಲಿ ಐರಾವತವನ್ನು, ಮನುಜರಲ್ಲಿ ಒಡೆಯನಾದ ಅರಸನನ್ನು[ಉನ್ನತಕೀರ್ತಿ ಪಡೆದು 'ಉಚ್ಚೈಃಶ್ರವಸ್' ಎನ್ನಿಸಿ ಉಚ್ಚೈಃಶ್ರವದಲ್ಲಿರುವವನು, ಐರಾ=ಲಕ್ಷ್ಮಿಗೆ, ಅವನ=ರಕ್ಷಕನಾಗಿ 'ಐರಾವತ' ಎನ್ನಿಸಿ ಐರಾವತದಲ್ಲಿರುವವನು, ನರರಿಗೆಲ್ಲಾ ಒಡೆಯನಾದ್ದರಿಂದ 'ನರಾಧಿಪ' ಎನ್ನಿಸಿ ಅರಸನಲ್ಲಿರುವವನು] ನಾನೆಂದು ತಿಳಿ.

ಹಿಂದೆ ಸೇನೆಯಲ್ಲಿ ಮುಖ್ಯವಾದ ಅಂಗಗಳಾಗಿ ಕುದುರೆ ಮತ್ತು ಆನೆಗಳನ್ನು ರಾಜರು ಬಳಸುತ್ತಿದ್ದರು. ಕೃಷ್ಣ ಈ ಶ್ಲೋಕದಲ್ಲಿ ಕುದುರೆ, ಆನೆ ಮತ್ತು ರಾಜರಲ್ಲಿ ತನ್ನ ವಿಶೇಷ ವಿಭೂತಿಯನ್ನು ಹೇಳಿದ್ದಾನೆ. ಕೃಷ್ಣ ಹೇಳುತ್ತಾನೆ "ಸಮುದ್ರ ಮಥನದಲ್ಲಿ ಅಮೃತದ ಜೊತೆಗೆ ಹುಟ್ಟಿದ ಅಶ್ವ 'ಉಚ್ಚೈಃಶ್ರವಸ್ಸು' ಮತ್ತು ಹಿರಿಯಾನೆ 'ಐರಾವತ'

ನಾನೆಂದು ತಿಳಿ" ಎಂದು. ಈ ಎರಡೂ ಪ್ರಾಣಿಗಳು ಬಹಳ ವಿಶೇಷ ಪ್ರಾಣಿಗಳು. ಕುದುರೆ ಮತ್ತು ಆನೆ ಸ್ವಾಮಿನಿಷ್ಠೆಗೆ ಹೆಸರಾದ ಪ್ರಾಣಿಗಳು. ಇವು ತನ್ನನ್ನು ಪ್ರೀತಿಯಿಂದ ಸಾಕುವ ಧನಿಗೆ ಎಂದೂ ಮೋಸ ಮಾಡುವುದಿಲ್ಲ. ಇನ್ನು ನರರಲ್ಲಿ ಶ್ರೇಷ್ಠ 'ನರಾಧಿಪ'. ಮನುಕುಲಕ್ಕೆ ನಾಯಕರಾಗಿ ನಿಂತು ಧರ್ಮನಿಷ್ಠರಾಗಿ ಜನಪಾಲನೆ ಮಾಡುವ ಮುಖಂಡರಲ್ಲಿ ಭಗವಂತನ ವಿಶೇಷ ಸನ್ನಿಧಾನವಿರುತ್ತದೆ. ಹಿಂದೆ ರಾಜ್ಯಭಾರ ಮಾಡಿದ ಧರ್ಮರಾಜ, ಪರೀಕ್ಷಿತ ಇತ್ಯಾದಿ ರಾಜರನ್ನು ಇಲ್ಲಿ ನಾವು ನೆನಪಿಸಿಕೊಳ್ಳಬಹುದು.

ಇಲ್ಲಿ ಬಂದಿರುವ ಭಗವಂತನ ವಿಭೂತಿನಾಮ ಉಚ್ಚೈಃಶ್ರವಸ್ಸು, ಐರಾವತಃ ಮತ್ತು ನರಾಧಿಪಃ. 'ಶ್ರವಸ್ಸು' ಎಂದರೆ ಕೀರ್ತಿ, ಜ್ಞಾನ, ಕರ್ಮ. ಹಬ್ಬಿರುವ ಕೀರ್ತಿ ಹೊಂದಿರುವ, ಮಹಾಜ್ಞಾನಿಯಾದ ಭಗವಂತ ಈ ಸೃಷ್ಟಿ-ಸ್ಥಿತಿ-ಸಂಹಾರವೆಂಬ ಮಹಾಕರ್ಮವನ್ನು ಸದಾ ಮಾಡುತ್ತಿರುವ 'ಉಚ್ಚೈಃಶ್ರವಸ್ಸು'. ಐರಾ ಎಂದರೆ ಭೂದೇವಿಯಲ್ಲಿ ಸನ್ನಿಹಿತಳಾಗಿರುವ ಲಕ್ಷ್ಮಿ. ಇಂತಹ ಲಕ್ಷ್ಮಿಗೆ ಪತಿಯಾಗಿರುವ ಭಗವಂತ 'ಐರಾವತಃ'. ನರರಿಗೆ, ಸರ್ವ ಜೀವಜಾತಕ್ಕೆ ಅಧಿಪತಿಯಾಗಿ, ಅರಸರಲ್ಲಿ ಸನ್ನಿಹಿತನಾಗಿರುವ ಭಗವಂತ 'ನರಾಧಿಪಃ'.

ಆಯುಧಾನಾಮಹಂ ವಜ್ರಂ ಧೇನೂನಾಮಸ್ಮಿ ಕಾಮಧುಕ್ ।
ಪ್ರಜನಶ್ಚಾಸ್ಮಿ ಕಂದರ್ಪಃ ಸರ್ಪಾಣಾಮಸ್ಮಿ ವಾಸುಕಿಃ ॥೨೮॥

ಆಯುಧಾನಾಮ್ ಅಹಮ್ ವಜ್ರಮ್ ಧೇನೂನಾಮ್ ಅಸ್ಮಿ ಕಾಮಧುಕ್ ।

ಪ್ರಜನಃ ಚ ಅಸ್ಮಿ ಕಂದರ್ಪಃ ಸರ್ಪಾಣಾಮ್ ಅಸ್ಮಿ ವಾಸುಕಿಃ –ಆಯುಧಗಳಲ್ಲಿ ವಜ್ರಾಯುಧ ನಾನು. [ಅರಿವರ್ಜಿತನಾದ್ದರಿಂದ 'ವಜ್ರ' ಎನ್ನಿಸಿ ವಜ್ರಾಯುಧದಲ್ಲಿದ್ದೇನೆ.] ಹಸುಗಳಲ್ಲಿ ಕಾಮಧೇನು ನಾನು. [ಕಾಮ=ಬಯಸಿದ್ದನ್ನು, ಧುಕ್=ಕರೆಯುವುದರಿಂದ 'ಕಾಮಧುಕ್' ಎನ್ನಿಸಿ ಕಾಮಧೇನುವಿನಲ್ಲಿದ್ದೇನೆ.] ಸಂತಾನವನ್ನೀಯುವ ಕಾಮದೇವ [ಕಂ=ಸುಖದ, ದರ=ಹಲವು ಬಗೆಗಳನ್ನು, ಪ=ಉಣ್ಣಿಸುವುದರಿಂದ 'ಕಂದರ್ಪ' ಎನ್ನಿಸಿ ಕಾಮದೇವನಲ್ಲಿದ್ದು ಅವನಿಗೆ ಹುಟ್ಟಿನ ಸೆಳೆತದ ಶಕ್ತಿಯನ್ನಿತ್ತವನು] ನಾನು. ಹಾವುಗಳಲ್ಲಿ ವಾಸುಕಿ ನಾನು. [ವಾಸು=ಎಲ್ಲೆಡೆ ವಾಸಮಾಡಿ, ಕಿ=ಸುಖವನ್ನೀಯುವುದರಿಂದ 'ವಾಸುಕಿ' ಎನ್ನಿಸಿ ವಾಸುಕಿಯಲ್ಲಿದ್ದೇನೆ.]

ಆಯುಧಗಳಲ್ಲಿ ಸರ್ವಶ್ರೇಷ್ಠ ಆಯುಧ ಭಗವಂತ ಧರಿಸುವ ಸುದರ್ಶನ. ಭಗವಂತನ ಆಯುಧವನ್ನು ಬಿಟ್ಟರೆ ಶ್ರೇಷ್ಠ ಆಯುಧ ವಜ್ರಾಯುಧ. ಕೃಷ್ಣ ಹೇಳುತ್ತಾನೆ "ಆಯುಧಗಳಲ್ಲಿ ವಜ್ರಾಯುಧ ನಾನು" ಎಂದು. ಈ ವಜ್ರಾಯುಧ ಇಂದ್ರನ ಆಯುಧ. ಇದಕ್ಕೆ ಮೂರು ಲೋಕವನ್ನು ನಿಯಂತ್ರಿಸುವ ಶಕ್ತಿಯನ್ನು ಭಗವಂತ ಕೊಟ್ಟ. ವೃತ್ರನನ್ನು ಸಂಹಾರ ಮಾಡಲು ಭಗವಂತನ ಆದೇಶದಂತೆ ದಧೀಚಿ ಎನ್ನುವ ಮುನಿಯ ಪೂರ್ಣ ತಪಸ್ಸಿನ ಫಲವನ್ನು ಆವಾಹನೆ ಮಾಡಿ ನಿರ್ಮಾಣಗೊಂಡ ಆಯುಧ ವಜ್ರಾಯುಧ. ಮಳೆ ಬಂದಾಗ ಕಾಣುವ ಸಿಡಿಲು-ಮಿಂಚನ್ನು ವಜ್ರಾಯುಧದ ಪ್ರತೀಕವೆನ್ನುತ್ತಾರೆ. ಈ ಆಯುಧದಲ್ಲಿ ಭಗವಂತ 'ವಜ್ರಃ' ನಾಮಕನಾಗಿ ಸನ್ನಿಹಿತನಾಗಿದ್ದಾನೆ. 'ವರ್ಜನಾತ್ ಇತಿ ವಜ್ರಃ'. ಶತ್ರುಗಳನ್ನು, ಸಮಸ್ತ ದೋಷವನ್ನು, ವರ್ಜನೆ ಮಾಡುವ ಭಗವಂತ ವಜ್ರಃ.

ಅಸ್ತ್ರದ ಬಗ್ಗೆ ಹೇಳಿದ ಕೃಷ್ಣ ಮುಂದೆ ವಿಶ್ವಾಮಿತ್ರನ ಸಮಸ್ತ ಅಸ್ತ್ರವನ್ನು ನಾಶಮಾಡಿದ ವಸಿಷ್ಠಮುನಿಯ ಕಾಮಧೇನುವಿನ ಬಗ್ಗೆ ಹೇಳುತ್ತಾನೆ. ಪ್ರಾಣಿಗಳಲ್ಲೇ ಶ್ರೇಷ್ಠ ಪ್ರಾಣಿ-ಧೇನು(ಹಸು). ನಮ್ಮ ಜೀವಮಾನವಿಡೀ ನಮಗೆ ಹಾಲುಣಿಸಿ ಪೋಷಿಸುವ ಭಗವಂತನ ವಿಶಿಷ್ಟ ವಿಭೂತಿ ಹಸು. ಈ ಕಾರಣಕ್ಕಾಗಿ ಕೃಷ್ಣ ಬಾಲಕನಿದ್ದಾಗ ಗೋಪೂಜೆಯನ್ನು ಚಾಲ್ತಿಗೆ ತಂದ. ಹಸುವಿನ ಮಲ-ಮೂತ್ರ ಕೂಡಾ ತ್ಯಾಜ್ಯವಲ್ಲ. ಯಾವುದರಿಂದಲೂ ಗುಣವಾಗದ ಚರ್ಮರೋಗ ಗೋಮಯ ಮತ್ತು  ಮೃತ್ತಿಕೆ(ಕೆಂಪು ಮಣ್ಣು)ಯಿಂದ ಸ್ನಾನ ಮಾಡಿದರೆ ಆ ರೋಗ ಗುಣವಾಗುತ್ತದೆ. ಮನೆ ಮುಂದೆ ಸಗಣಿ ಸಾರಿಸುವುದರಿಂದ ಅಲ್ಲಿ ಕ್ರಿಮಿ ಕೀಟ ಇಲ್ಲವಾಗುತ್ತದೆ. ಗೋಮಯದಲ್ಲಿ ಲಕ್ಷ್ಮಿಯ ಸನ್ನಿಧಾನವಿದೆ ಎಂದು ಮಹಾಭಾರತದಲ್ಲಿ ಬರುವ ಒಂದು ಕಥೆಯಲ್ಲಿ ಹೇಳಲಾಗಿದೆ. ಹೀಗೆ ಅನೇಕಾನೇಕ ಉಪಯೋಗ ಹಸುವಿನಿಂದ. ಭಗವಂತ ಬಯಸಿದ್ದನ್ನು ಕೊಡುವ 'ಕಾಮಧುಕ್' ನಾಮಕನಾಗಿ ಕಾಮಧೇನುವಿನಲ್ಲಿ ವಿಭೂತಿಯಾಗಿ ನಿಂತ.

ಈ ಪ್ರಪಂಚದಲ್ಲಿರುವ ಜೀವಿಗಳಲ್ಲಿ ಗಂಡು-ಹೆಣ್ಣಿನ ನಡುವೆ ಹುಟ್ಟಿನ ಸೆಳೆತ(Sexual desire)ವಾಗಿ ನಿಂತಿರುವವ-ಸಂತಾನವನ್ನೀಯುವ ಕಾಮದೇವ. ಈ ಕಾಮದೇವ(ಕಂದರ್ಪ)ನಲ್ಲಿ ಭಗವಂತನ ವಿಶಿಷ್ಟ ಶಕ್ತಿ ಅಡಗಿದೆ. ಸೃಷ್ಟಿಯಲ್ಲಿ ಸಂತಾನ ಕ್ರಿಯೆ ನಡೆಯುವುದಕ್ಕೋಸ್ಕರ ಅಧಮ್ಯ ಬಯಕೆಯನ್ನು ಎಲ್ಲರೊಳಗೆ ತುಂಬಿ, ಅಲ್ಲಿ ಭಗವಂತ ಕೂತ. ಈ ಕಾರಣದಿಂದ ಭಗವಂತನ ಅನುಗ್ರಹವಿಲ್ಲದೆ ಲೀಲಾಜಾಲವಾಗಿ ಯಾರೂ ಕೂಡಾ ಈ ಶಕ್ತಿಯಿಂದೀಚೆಗೆ ಬರಲಾರರು. ಬಲವಂತವಾಗಿ ಅದನ್ನು ಬಿಡಲಾಗದು. ಭಗವಂತ ಕಂದರ್ಪಃ ನಾಮಕನಾಗಿ ಕಾಮದೇವನಲ್ಲಿ ತುಂಬಿದ್ದಾನೆ. ಮನುಷ್ಯನಿಗೆ ಅನೇಕ ರೀತಿಯ ಬಯಕೆಗಳನ್ನು ಕೊಟ್ಟು, ಆ ಬಯಕೆಯಿಂದ ಅವರನ್ನು ಸಂತೃಪ್ತಿಗೊಳಿಸಿ, ವಿಚಿತ್ರ ಸುಖದ ಸುಪ್ಪತ್ತಿಗೆಯಲ್ಲಿ ಓಲಾಡಿಸುವ ಭಗವಂತ 'ಕಂದರ್ಪಃ'.

ಕಾಮದೇವ-ಮನ್ಮಥನ  ನಂತರ ಕಾಮದ ಸಂಕೇತವಾದ ಸರ್ಪದ ಬಗ್ಗೆ ಕೃಷ್ಣ ವಿವರಿಸುತ್ತಾನೆ. ಹೊಟ್ಟೆಯನ್ನು ಹೊಸೆದುಕೊಂಡು ಹೋಗುವ ಸರೀಸೃಪವನ್ನು ಸರ್ಪ ಎನ್ನುತ್ತಾರೆ. ಸರೀಸೃಪಗಳಿಗೆಲ್ಲಾ  ರಾಜ ವಾಸುಕಿ. ಭಗವಂತ 'ವಾಸುಕಿಃ' ನಾಮಕನಾಗಿ ನಿಂತು, ವಾಸುಕಿಗೆ ಈ ಸ್ಥಾನವನ್ನು ಕೊಟ್ಟ. ಭಗವಂತ ಇಲ್ಲದ ಸ್ಥಳವಿಲ್ಲ. ಎಲ್ಲೆಡೆ ವಾಸಮಾಡುವ ಭಗವಂತ 'ವಾಸುಕಿಃ'.

ಅನಂತಶ್ಚಾಸ್ಮಿ ನಾಗಾನಾಂ ವರುಣೋ ಯಾದಸಾಮಹಮ್ ।
ಪಿತ್ಯಣಾಮರ್ಯಮಾ ಚಾಸ್ಮಿ ಯಮಃ ಸಂಯಮತಾಮಹಮ್ ॥೨೯॥

ಅನಂತಃ ಚ ಅಸ್ಮಿ ನಾಗಾನಾಮ್ ವರುಣಃ ಯಾದಸಾಮ್ ಅಹಮ್ ।

ಪಿತೃಣಾಮ್ ಅರ್ಯಮಾ ಚ ಅಸ್ಮಿ ಯಮಃ ಸಂಯಮತಾಮ್ ಅಹಮ್ –ನಾಗರಹಾವುಗಳಲ್ಲಿ ಶೇಷ ನಾನು. [ಅಳಿವಿರದ್ದರಿಂದ 'ಅನಂತ' ಎನ್ನಿಸಿ ಶೇಷನಲ್ಲಿದ್ದೇನೆ.] ಜಲಚರಗಳ ಒಡೆಯ ವರುಣ [ವರ=ಹಿರಿದಾದ, ಣ=ಆನಂದಸ್ವರೂಪನಾದ್ದರಿಂದ 'ವರುಣ' ಎನ್ನಿಸಿ ವರುಣನಲ್ಲಿದ್ದು ಅವನಿಗೆ ಜಲಚರಗಳ ಒಡೆತನವನ್ನಿತ್ತವನು] ನಾನು. ಪಿತೃದೇವತೆಗಳಲ್ಲಿ ಅರ್ಯಮ ನಾನು. [ಅರ್ಯ=ಅರಿಯಬೇಕಾದವನು ಮತ್ತು ಮಾ=ಅರಿತವನು ಆದ್ದರಿಂದ 'ಅರ್ಯಮನ್' ಎನ್ನಿಸಿ, ಪಿತೃಪತಿಯಾದ ಅರ್ಯಮನೆಂಬ ಆದಿತ್ಯನಲ್ಲಿದ್ದೇನೆ.] ದಂಡಿಸುವವರಲ್ಲಿ

ಯಮ[ನಿಯಮಿಸುವುದರಿಂದ 'ಯಮ' ಎನ್ನಿಸಿ, ಯಮನಲ್ಲಿದ್ದು ಅವನಿಗೆ ಪಾಪಿಗಳನ್ನು ದಂಡಿಸುವ ಹೊಣೆಯಿತ್ತವನು]ನಾನು.

ಸರ್ಪಗಳ ಜಾತಿಯಲ್ಲಿ ಹೆಡೆ ಉಳ್ಳದ್ದು 'ನಾಗರ'. ನಾಗರದಲ್ಲಿ ಅತ್ಯಂತ ಶ್ರೇಷ್ಠ 'ಶೇಷ'. ಬಲರಾಮನಾಗಿ, ಲಕ್ಷ್ಮಣನಾಗಿ, ಸದಾ ಭಗವಂತನ ಹಾಸಿಗೆಯಾಗಿ ಇರುವ ಬಹಳ ದೊಡ್ಡ ದೇವತಾಶಕ್ತಿ ಶೇಷ. ಶೇಷ ಭೂಮಿಯ ಆಕರ್ಷಣ ಶಕ್ತಿಯಾದ(Gravity) ಸಂಕರ್ಷಣ. ಹೀಗಾಗಿ ಭೂಮಿಯನ್ನು ಶೇಷ ಹೊತ್ತಿದ್ದಾನೆ ಎನ್ನುತ್ತಾರೆ. ಇಂತಹ ಶೇಷನಲ್ಲಿ ಭಗವಂತ ವಿಶೇಷವಾಗಿ ಸನ್ನಿಹಿತನಾಗಿದ್ದಾನೆ. ಹೆಡೆಯಿರುವ ಹಾವುಗಳಿಗೆಲ್ಲಾ ಮೂಲಶಕ್ತಿಯಾಗಿ ಶೇಷನಲ್ಲಿ ತುಂಬಿದ, ಎಂದೂ ಅಳಿವಿರದ ಶೇಷಶಯನ ಭಗವಂತ 'ಅನಂತಃ'.
"ಜಲಚರ ಪ್ರಾಣಿಗಳಲ್ಲಿ ಅವುಗಳ ಒಡೆಯ 'ವರುಣ' ನಾನು" ಎನ್ನುತ್ತಾನೆ ಕೃಷ್ಣ. ನೀರಿನ ಆವರಣದಲ್ಲಿ ಅನೇಕ ಜಲಚರ ಪ್ರಾಣಿಗಳಿಗೆ ಬದುಕು ಕೊಡುವ ವರುಣನೊಳಗೆ ವಿಶೇಷ ವಿಭೂತಿಯಾಗಿ ಭಗವಂತ ತುಂಬಿದ. ಇಲ್ಲಿ ಬರುವ ಭಗವಂತನ ವಿಭೂತಿನಾಮ ವರುಣಃ. ಹಿರಿದಾದ ಆನಂದ ಸ್ವರೂಪನಾದ್ದರಿಂದ 'ವರುಣ' ಎನ್ನಿಸಿ ವರುಣನಲ್ಲಿದ್ದು, ಅವನಿಗೆ ಜಲಚರಗಳ ಒಡೆತನವಿತ್ತ ಭಗವಂತ 'ವರುಣಃ'.
ಭೂಮಿಯಿಂದ ದೇಹತ್ಯಾಗ ಮಾಡಿ ಹೋಗುವ ಜೀವಗಳನ್ನು ನಿಯಂತ್ರಿಸುವ ದೇವತಾ ಶಕ್ತಿ-ಪಿತೃದೇವತೆಗಳು. ಅವರಲ್ಲಿ ಅವರ ಮುಖಂಡನಾದ, ದ್ವಾದಶಾದಿತ್ಯರಲ್ಲಿ ಒಬ್ಬನಾದ ಅರ್ಯಮನಲ್ಲಿ ಭಗವಂತ ವಿಶೇಷ ಶಕ್ತಿಯಾಗಿ ನಿಂತ. "ಅರಿಯಬೇಕಾದವನು(ಅರ್ಯ) ಮತ್ತು ಅರಿತವನು(ಮಾ) ಆದ್ದರಿಂದ 'ಅರ್ಯಮನ್' ಎನ್ನಿಸಿ, ಪಿತೃಪತಿಯಾದ ಅರ್ಯಮನೆಂಬ ಆದಿತ್ಯನಲ್ಲಿದ್ದೇನೆ" ಎನ್ನುತ್ತಾನೆ ಕೃಷ್ಣ.
ಪಾಪ ಮಾಡಿದ ಜೀವಗಳನ್ನು ನಿಯಂತ್ರಿಸುವವ ಯಮ. ಯಮನೊಳಗೆ ಭಗವಂತನ ವಿಶೇಷ ಸನ್ನಿಧಾನವಿದೆ. ಯಮನಲ್ಲಿದ್ದು ನಿಯಮಿಸುವ ಭಗವಂತ 'ಯಮಃ'. ಯೋಗಶಾಸ್ತ್ರದಲ್ಲಿ ಯಮ ಎನ್ನುವ ಪದವನ್ನು ವಿಶಿಷ್ಟ ಅರ್ಥದಲ್ಲಿ ಬಳಸಿದ್ದಾರೆ. ಅದು ನಾವು ಮಾಡಬಾರದ ಐದು ನಿಯಮಗಳನ್ನು ಹೇಳುತ್ತದೆ. (೧) ಹಿಂಸೆ, (೨) ಸುಳ್ಳು ಹೇಳುವುದು,(೩) ಕದಿಯುವುದು,(೪) ಅತಿಯಾದ ಕಾಮ ಮತ್ತು (೫) ಇನ್ನೊಬ್ಬರ ಮುಂದೆ ಕೈಚಾಚುವುದು. ಭಗವಂತನ ಉಪಾಸನೆಯ ಮಾರ್ಗದಲ್ಲಿ ಬಿಡಬೇಕಾದ ಈ ಐದು ನಿಯಮಗಳನ್ನು ಕೊಟ್ಟ ಭಗವಂತ ಯಮಃ. ಇಡೀ ಜಗತ್ತನ್ನು ನಿಯಂತ್ರಿಸುವ, ಯಮಧರ್ಮನನ್ನೂ ನಿಯಂತ್ರಿಸುವ ಭಗವಂತ ಯಮಃ.

ಪ್ರಹ್ಲಾದಶ್ಚಾಸ್ಮಿ ದೈತ್ಯಾನಾಂ ಕಾಲಃ ಕಲಯತಾಮಹಮ್ ।
ಮೃಗಾಣಾಂ ಚ ಮೃಗೇಂದ್ರೋऽಹಂ ವೈನತೇಯಶ್ಚ ಪಕ್ಷಿಣಾಮ್ ॥೩೦॥

ಪ್ರಹ್ಲಾದಃ ಚ ಅಸ್ಮಿ ದೈತ್ಯಾನಾಮ್ ಕಾಲಃ ಕಲಯತಾಮ್ ಅಹಮ್ ।
ಮೃಗಾಣಾಮ್ ಚ ಮೃಗೇಂದ್ರಃ ಅಹಮ್ ವೈನತೇಯಃ ಚ ಪಕ್ಷಿಣಾಮ್ –ದಿತಿಯ ವಂಶದವರಲ್ಲಿ ಹಿರಿಯನಾದ ಪ್ರಹ್ಲಾದ ನಾನು [ಹಿರಿಯ ಆನಂದದಿಂದ 'ಪ್ರಹ್ಲಾದ' ಎನ್ನಿಸಿ ಪ್ರಹ್ಲಾದನಲ್ಲಿದ್ದೇನೆ.] ಲೆಕ್ಕಿಗರಲ್ಲಿ ಕಾಲ ನಾನು. [ಕೊಲ್ಲುವವನಾದ್ದರಿಂದ 'ಕಾಲ' ಎನ್ನಿಸಿ ಕಾಲದೇವತೆಯಲ್ಲಿದ್ದೇನೆ.] ಮೃಗಗಳಲ್ಲಿ ಸಿಂಹ ನಾನು.

[ಮೃಗ=ಭಗವಂತನನ್ನರಸುವ ಭಕ್ತರಿಗೆ, ಇಂದ್ರ =ಒಡೆಯನಾದ್ದರಿಂದ 'ಮೃಗೇಂದ್ರ' ಎನ್ನಿಸಿ ಸಿಂಹದಲ್ಲಿದ್ದೇನೆ.] ಹಕ್ಕಿಗಳಲ್ಲಿ ಗರುಡ ನಾನು. [ವಿನತ =ಶರಣಾದವರಿಗೆ ಆಸರೆಯಾಗಿ 'ವೈನತೇಯ' ಎನ್ನಿಸಿ ಗರುಡನಲ್ಲಿದ್ದೇನೆ.]

ಭಗವಂತನ ಸನ್ನಿಧಾನ ಸಜ್ಜನರಲ್ಲೂ ಇದೆ, ದುರ್ಜನರಲ್ಲೂ ಇದೆ. ದೈತ್ಯರಿಗೆ ಬಲವನ್ನು ಕೊಡುವವನೂ ಭಗವಂತ. ಸಾಮಾನ್ಯವಾಗಿ ದೈತ್ಯರು ಇನ್ನೊಬ್ಬರ ಬದುಕನ್ನು ಹಾಳುಗೆಡುವವರು. ಆದರೆ ಇಂತಹ ದೈತ್ಯವಂಶದ ಆದಿಯಲ್ಲಿ ಹುಟ್ಟಿದ ಪ್ರಹ್ಲಾದ-ಎಲ್ಲರಿಗಿಂತ ಭಿನ್ನ. ಇದಕ್ಕೆ ಕಾರಣ ಭಗವಂತ ಈತನಲ್ಲಿ ವಿಶೇಷವಾಗಿ ಸನ್ನಿಧಾನವಿತ್ತಿರುವುದು. ದೈತ್ಯ ವಂಶದಲ್ಲಿ ಹುಟ್ಟಿ, ಆ ಸ್ವಭಾವದಿಂದ ಕಳಚಿಕೊಂಡು ಬಹಳ ಎತ್ತರಕ್ಕೇರಿದವ ಪ್ರಹ್ಲಾದ. ಈ ಕಾರಣದಿಂದ ದೈತ್ಯರಲ್ಲೇ ವಿಶೇಷ ವಿಭೂತಿ ಈತ. ಪ್ರಹ್ಲಾದನ ಮೇಲೆ ಭಗವಂತನ ವಿಶೇಷ ಅನುಗ್ರಹ. ಆತ ಗರ್ಭದಲ್ಲಿದ್ದಾಗಲೇ ಆತನಿಗೆ ದೇವರ್ಷಿ ನಾರದರ ಮೂಲಕ ಅಧ್ಯಾತ್ಮ ಉಪದೇಶ ಪಡೆಯುವ ಭಾಗ್ಯ ದೊರೆಯಿತು. ಈತ ಧ್ರುವನಂತೆ ತನ್ನ ಐದನೇ ವಯಸ್ಸಿನಲ್ಲಿ ದೇವರನ್ನು ಕಂಡ ಸಾಧಕ. ಪ್ರಹ್ಲಾದನ ಮುಖೇನ ಪ್ರಪಂಚಕ್ಕೆ ಭಗವಂತ ಬಹಳ ಮುಖ್ಯವಾದ ಸಂದೇಶವನ್ನು ನೀಡಿದ್ದಾನೆ. 'ಭಗವಂತ ಭಯಾನಕ ಅಲ್ಲ, ಪ್ರೀತಿಯಿಂದ ಭಗವಂತನ ಬಳಿಗೆ ಹೋದರೆ ಆತ ನಮ್ಮನ್ನು ಅಷ್ಟೇ ಪ್ರೀತಿಯಿಂದ ಕಾಣುತ್ತಾನೆ; ಭಗವಂತನ ಪೂಜೆ ಒಂದು ವ್ಯಾಪಾರವಲ್ಲ, ನಮ್ಮ ಯಾವುದೋ ಬಯಕೆಯನ್ನು ಸಾಧಿಸಿಕೊಳ್ಳುವುದಕ್ಕೋಸ್ಕರ ನಾವು ದೇವರ ಪೂಜೆ ಮಾಡಬಾರದು; ನಮ್ಮ ನಿಷ್ಕಾಮ ಭಕ್ತಿ ಭಗವಂತನಿಗೆ ಇಷ್ಟ; ಈ ರೀತಿ ಭಗವಂತನನ್ನು ಪೂಜಿಸುವುದರಿಂದ ನಾವು ಸದಾ ಆನಂದದಿಂದಿರಬಹುದು' ಎನ್ನುವ ಸತ್ಯವನ್ನು ಪ್ರಹ್ಲಾದ ಪ್ರಪಂಚಕ್ಕೆ ತೋರಿಸಿಕೊಟ್ಟ. ಇಲ್ಲಿ ಬರುವ ಭಗವಂತನ ವಿಭೂತಿನಾಮ ಪ್ರಹ್ಲಾದಃ. ಎಂದೂ ದುಃಖವಿಲ್ಲದ ಪೂರ್ಣವಾದ ಆನಂದಮೂರ್ತಿ ಭಗವಂತ ಪ್ರಹ್ಲಾದಃ.

ಕೃಷ್ಣ ಹೇಳುತ್ತಾನೆ: "ಕಾಲಃ ಕಲಯತಾಮ್ ಅಹಮ್" ಎಂದು. ಈ ಜಗತ್ತಿನಲ್ಲಿ ಅನಾಧಿ ಅನಂತ ಕಾಲದಲ್ಲಿ ನಡೆಯತಕ್ಕ ಪ್ರತಿಯೊಂದು ಹುಟ್ಟು-ಸಾವು ಪೂರ್ವನಿಶ್ಚಿತ. ಇದನ್ನು ಬದಲಿಸಲು ಯಾರಿಂದಲೂ ಸಾಧ್ಯವಿಲ್ಲ. ಇಲ್ಲಿ ಕಾಲ ಎನ್ನುವ ಪದ ಲೆಕ್ಕ, ಮೃತ್ಯು, ಶಿವ, ದುರ್ಗೆ, ಕಾಲಾಗ್ನಿ, ಇತ್ಯಾದಿ ಅನೇಕ ಅರ್ಥವನ್ನು ಕೊಡುತ್ತದೆ. ಇವೆಲ್ಲದರಲ್ಲೂ ಭಗವಂತನ ವಿಶೇಷ ವಿಭೂತಿ ಅಡಗಿದೆ. ಭಗವಂತ ಕಾಲಃ ನಾಮಕನಾಗಿ 'ಕಾಲ'ದಲ್ಲಿ ತುಂಬಿದ್ದಾನೆ. ಕಾಲ ಎನ್ನುವುದು 'ಕಲ' ಎನ್ನುವ ಧಾತುವಿನಿಂದ ಬಂದ ಪದ. ಎಲ್ಲಾ ಗುಣಗಳನ್ನು, ಎಲ್ಲಾ ಸಾಮರ್ಥ್ಯವನ್ನು ತನ್ನೊಳಗೆ 'ಕಲೆ' ಹಾಕಿದವನು ಕಾಲಃ. ಭಗವಂತ ಸಮಸ್ತ ಸದ್ಗುಣಗಳಿಂದ ಪರಿಪೂರ್ಣವಾದ ತತ್ವ. ಈ ತತ್ವವನ್ನು ನಾವು ಅರಿಯದೇ ಅಹಂಕಾರಿಗಳಾದಾಗ, ಅದೇ ತತ್ವ 'ಕಾಲ ಪುರುಷನಾಗಿ' ನಮ್ಮ ಸಂಹಾರಕ್ಕೆ ಕಾರಣವಾಗುತ್ತದೆ. ನಮ್ಮ ಉದ್ಧಾರ ಕೆಲವೊಮ್ಮೆ 'ಬದುಕಿನಲ್ಲಿ'ದ್ದರೆ ಇನ್ನು ಕೆಲವೊಮ್ಮೆ ನಮ್ಮ 'ಸಾವಿನಲ್ಲಿ'; ಕೆಲವೊಮ್ಮೆ ನಮ್ಮ 'ಮಾನದಲ್ಲಿ', ಇನ್ನು ಕೆಲವೊಮ್ಮೆ ನಮ್ಮ 'ಅವಮಾನದಲ್ಲಿ'.; ಕೆಲವೊಮ್ಮೆ ನಮ್ಮ 'ಜ್ಞಾನದಲ್ಲಿ' ನಮ್ಮ ಉದ್ಧಾರವಿದ್ದರೆ, ಇನ್ನು ಕೆಲವೊಮ್ಮೆ ನಮ್ಮ 'ಅಜ್ಞಾನದಲ್ಲಿ' ನಮ್ಮ ಉದ್ಧಾರವಿರುತ್ತದೆ. ಆದರೆ ನಮ್ಮ 'ಅಹಂಕಾರದಲ್ಲಿ' ಎಂದೆಂದೂ ಉದ್ಧಾರವಿಲ್ಲ. ಜಗತ್ತಿನಲ್ಲಿ ಅಹಂಕಾರ ಭರಿತ ಅಜ್ಞಾನ ತುಂಬಿದಾಗ ಭಗವಂತ 'ಕಾಲ ಪುರುಷನಾಗಿ' ಬೆಳೆದು ನಿಲ್ಲುತ್ತಾನೆ. ಕಾಲ ಎನ್ನುವುದಕ್ಕೆ ಇನ್ನೊಂದು ಅರ್ಥ 'ಸಮಯ'. ಪ್ರತಿಯೊಂದು ಕ್ರಿಯೆಯ ಹಿಂದೆ 'ಕಾಲ' ಸರ್ವ ಕಾರಣವಾಗಿರುತ್ತದೆ. ಕಾಲನಿಯಾಮಕ ಭಗವಂತ ಕಾಲಃ. ಜ್ಞಾನಕಾರಕವಾದ ಅವತಾರಗಳಿಂದ (ವ್ಯಾಸ,ಕಪಿಲ,ದತ್ತಾತ್ರಯ, ನರ-ನಾರಾಯಣ, ಇತ್ಯಾದಿ) ಅಜ್ಞಾನಕ್ಕೆ

'ಕಾಲವಾದ' ಭಗವಂತ, ಬಲಕಾರಕ ಅವತಾರಗಳಿಂದ(ನರಸಿಂಹ, ವರಾಹ, ರಾಮ,ಪರಶುರಾಮ, ಇತ್ಯಾದಿ) ಅಹಂಕಾರಕ್ಕೆ 'ಕಾಲನಾದ'. ಹೀಗೆ ಸರ್ವ ಗುಣಪೂರ್ಣ, ಸರ್ವ ಸಂಹಾರಕ ಹಾಗೂ ಕಾಲನಿಯಾಮಕ ಭಗವಂತ ಕಾಲಃ.

ಸಂಹಾರ ಶಕ್ತಿಯಾಗಿ ತನ್ನ ವಿಭೂತಿಯನ್ನು ಹೇಳಿದ ಕೃಷ್ಣ, ಮುಂದೆ ಪ್ರಾಣಿಗಳಲ್ಲಿ ಬಹಳ ಉಗ್ರ ಮತ್ತು ಬಲಿಷ್ಠ ಪ್ರಾಣಿಯಲ್ಲಿ ತನ್ನ ವಿಭೂತಿಯನ್ನು ವಿವರಿಸುತ್ತಾನೆ. ಭೂಮಿಯಲ್ಲಿ ಹೆಚ್ಚು ಬಲಿಷ್ಠ ಮತ್ತು ದೊಡ್ಡ ಪ್ರಾಣಿ ಆನೆ. ಆದರೆ ಇಂತಹ ಆನೆಯನ್ನೂ ಕೂಡಾ ಸಂಹಾರ ಮಾಡಬಲ್ಲ ಕಾಡಿನ ರಾಜ ಮೃಗೇಂದ್ರ-ಸಿಂಹ. ಮೃಗಗಳಲ್ಲೇ ಶ್ರೇಷ್ಠ ಮೃಗ ಎನ್ನಿಸಿಕೊಳ್ಳುವ ವಿಭೂತಿಯಾಗಿ ಭಗವಂತ ಸಿಂಹದಲ್ಲಿ ಕೂತ. ಇಲ್ಲಿ ಬರುವ ಭಗವಂತನ ನಾಮ 'ಮೃಗೇಂದ್ರಃ'. ಭಗವಂತನ ಸಾಧನೆಯಲ್ಲಿ ನಿಂತವರಿಗೆ ಮಾರ್ಗದರ್ಶಕನಾಗಿ ನಿಲ್ಲುವ(ಮೃಗ) ಸರ್ವಶ್ರೇಷ್ಠ ಭಗವಂತ 'ಮೃಗೇಂದ್ರಃ'.

ಪ್ರಾಣಿಯ ನಂತರ ಪಕ್ಷಿಗಳಲ್ಲಿ ಭಗವಂತನ ವಿಭೂತಿ. ಪಕ್ಷಿಗಳಲ್ಲೇ ಅತ್ಯಂತ ಶ್ರೇಷ್ಠ ಪಕ್ಷಿ 'ಗರುಡ'. ಹೊಟ್ಟೆಯ ಭಾಗ ಬೆಳ್ಳಗಿರುವ ಹದ್ದಿನ ಜಾತಿಯ ಪಕ್ಷಿ ಗರುಡ. ಭಗವಂತನ ವಾಹನ ಗರುಡ ವಿನುತೆಯ ಮಗ. ಆದ್ದರಿಂದ ಈತನನ್ನು ವೈನತೇಯ ಎನ್ನುತ್ತಾರೆ. ತನಗೆ ಶರಣಾಗುವ ಭಕ್ತರಿಗೆ(ವಿನತ) ಆಸರೆಯಾಗಿ 'ವೈನತೇಯ' ಎನ್ನಿಸಿ ಭಗವಂತ ಗರುಡನಲ್ಲಿ ಸನ್ನಿಹಿತನಾಗಿದ್ದಾನೆ. ಭಗವಂತನನ್ನು ತನ್ನ ಹೆಗಲ ಮೇಲೆ ಹೊತ್ತು ಓಡಾಡುವ ಗರುಡ-ಭಗವಂತನ ವಿಶೇಷ ವಿಭೂತಿ.

ಪವನಃ ಪವತಾಮಸ್ಮಿ ರಾಮಃ ಶಸ್ತ್ರಭೃತಾಮಹಮ್ ।
ಝಷಾಣಾಂ ಮಕರಶ್ಚಾಸ್ಮಿ ಸ್ರೋತಸಾಮಸ್ಮಿ ಜಾಹ್ನವೀ ॥೩೧॥

ಪವನಃ ಪವತಾಮ್ ಅಸ್ಮಿ ರಾಮಃ ಶಸ್ತ್ರಭೃತಾಮ್ ಅಹಮ್ ।
ಝಷಾಣಾಮ್ ಮಕರಃ ಚ ಅಸ್ಮಿ ಸ್ರೋತಸಾಮ್ ಅಸ್ಮಿ ಜಾಹ್ನವೀ–ಚಲಿಸುವ ವಸ್ತುಗಳಲ್ಲಿ ಮಿಗಿಲಾದ ಗಾಳಿ ನಾನು.[ಪ=ಜಗತ್ತನ್ನು ಪಾಲಿಸುವ ದೇವತೆಗಳಿಂದಲೂ, ವನ=ಸೇವ್ಯನಾದ್ದರಿಂದ 'ಪವನ' ಎನ್ನಿಸಿ ಗಾಳಿಯಲ್ಲಿದ್ದೇನೆ.] ಆಯುಧದಿಂದ ಹೋರಾಡಬಲ್ಲ ವೀರರಲ್ಲಿ ನಾನು [ರ=ಆನಂದರೂಪನಾಗಿ, ಅಮ=ಅಪರಿಮಿತನಾದ್ದರಿಂದ ಮತ್ತು ಲೋಕವನ್ನು ರಮಿಸುವುದರಿಂದ] ರಾಮನೆಂದು ಹೆಸರಾಗಿದ್ದೇನೆ. ಮೀನುಗಳಲ್ಲಿ ತಿಮಿಂಗಿಲ ನಾನು. [ಮ=ತಿಳಿವನ್ನು, ಕರ=ಕೊಡುವವನಾದ್ದರಿಂದ 'ಮಕರ' ಎನ್ನಿಸಿ ಮಕರದಲ್ಲಿದ್ದೇನೆ.] ನದಿಯಲ್ಲಿ ಗಂಗೆ ನಾನು. [ಜಹತ್ =ಕಾಮನೆಗಳನ್ನು ತೊರೆದವರಿಗೆ, ಅವಿ=ರಕ್ಷಕನಾಗಿ, 'ಜಾಹ್ನವಿ' ಎನ್ನಿಸಿ ಗಂಗೆಯಲ್ಲಿದ್ದೇನೆ.]

ಮುಂದುವರಿದು ಕೃಷ್ಣ ಹೇಳುತ್ತಾನೆ "ಪವನಃ ಪವತಾಮಸ್ಮಿ" ಎಂದು. 'ಪವನ' ಎನ್ನುವ ಪದದ ಪ್ರಸಿದ್ಧವಾದ ಅರ್ಥ 'ಗಾಳಿ' ಅಥವಾ ವಾಯುದೇವರು. ಆಕಾಶದಲ್ಲಿ ಸಂಚರಿಸುವ ಶಕ್ತಿಗಳಲ್ಲೇ ದೊಡ್ಡ ವಿಭೂತಿ 'ವಾಯು'. ನಮ್ಮ ಜೀವವನ್ನು ನಿಯಂತ್ರಿಸುವ ವಾಯುದೇವರಲ್ಲಿ ವಿಶೇಷವಾಗಿ ಸನ್ನಿಹಿತನಾಗಿರುವ ಭಗವಂತ ಪವನಃ. ಪವತೇ ಇತಿ ಪವನಃ - ಅಂದರೆ ನಿರಂತರ ಚಲಿಸುವಂತಾದ್ದು. ಎಲ್ಲರ ಒಳಗೂ ಅಂತರ್ಯಾಮಿಯಾಗಿರುವ ಭಗವಂತ,

ಆಯಾ ವಸ್ತುವಿನಲ್ಲಿ ಆಯಾ ರೂಪದಲ್ಲಿದ್ದು ನಿರಂತರ ಚಲನೆ ಕೊಡುತ್ತಿರುತ್ತಾನೆ. ನಮ್ಮ ದೇಹದಲ್ಲಿ ಆತನ ಚಲನೆ ನಿಂತಾಕ್ಷಣ ನಾವು 'ಶವ' ವಾಗುತ್ತೇವೆ. ಉಪನಿಷತ್ತಿನಲ್ಲಿ ಭಗವಂತನನ್ನು ವನಃ ಎಂದಿದ್ದಾರೆ. ಅವನು ಪ+ವನಃ; ಇಲ್ಲಿ 'ಪ' ಎಂದರೆ 'ಪಾಲನೆ'. ನಮ್ಮನ್ನು ಹಾಗೂ ಸಮಸ್ತ ಬ್ರಹ್ಮಾದಿ ದೇವತೆಗಳನ್ನು ಪಾಲಿಸುವ ಶಕ್ತಿ. ವನಃ ಎಂದರೆ ಎಲ್ಲರೂ ಭಜಿಸಬೇಕಾದ, ಪ್ರೀತಿಯಿಂದ ಉಪಾಸನೆ ಮಾಡತಕ್ಕಂತಹ, ಎಲ್ಲರೂ ಆಶ್ರೈಸಬೇಕಾದ ವಸ್ತು. ಸಹಸ್ರ ರೂಪನಾಗಿ ಸಹಸ್ರ ಜೀವರಲ್ಲಿ ನೆಲೆಸಿ, ನಿರಂತರ ಪಾಲಿಸುವ ಭಗವಂತ ಪವನಃ.

"ಆಯುಧವನ್ನು ಹಿಡಿದು ಹೋರಾಡಬಲ್ಲ ವೀರರಲ್ಲಿ ರಾಮ ನಾನು" ಎಂದು ತನ್ನ ಸ್ವರೂಪ ವಿಭೂತಿಯನ್ನು ವಿವರಿಸುತ್ತಾನೆ ಕೃಷ್ಣ. ಭಗವಂತನ ಇತರ ಎಲ್ಲಾ ಅವತಾರಕ್ಕಿಂತ ರಾಮಾವತಾರದಲ್ಲಿ ಆತ ಕೋದಂಡಪಾಣಿಯಾಗಿ ಶಸ್ತ್ರದ ಪೂರ್ಣ ಬಳಕೆ ಮಾಡಿ ಶತ್ರು ನಿಗ್ರಹ ಮಾಡಿದ.

ರಾಮ ಎನ್ನುವ ನಾಮಕ್ಕೆ ಶಾಸ್ತ್ರದಲ್ಲಿ ಅನೇಕ ಅರ್ಥಗಳನ್ನು ಕಾಣಬಹುದು. 'ರಾ+ಅಮಃ', ಎಂದರೆ ಅಪರಿಮಿತವಾದ ಆನಂದಸ್ವರೂಪ ಹಾಗೂ ಎಲ್ಲರಿಗೂ ಆನಂದವನ್ನು ಹಂಚುವವನು. ಭಗವಂತನ ಈ ಗುಣ ರಾಮಾವತಾರದಲ್ಲಿ ಸ್ಪಷ್ಟವಾಗಿ ಕಾಣಸಿಗುತ್ತದೆ. ರಾಮಾವತಾರದಲ್ಲಿ ಭಗವಂತ ಎಲ್ಲಿಯೂ ಇನ್ನೊಬ್ಬರಿಗೆ ನೋವಾಗುವಂತೆ ನಡೆದುಕೊಂಡಿಲ್ಲ. ತನ್ನನ್ನು ಕಾಡಿಗೆ ಕಳುಹಿಸಲು ಕಾರಣಕರ್ತೆಯಾದ ಕೈಕೇಯಿಯ ಮೇಲೆ ಎಲ್ಲರು ಕೋಪಗೊಂಡಾಗಲೂ ಸಹ, ರಾಮಚಂದ್ರ ಒಮ್ಮೆಯೂ ಕೂಡಾ ಕೆಟ್ಟ ಮಾತನ್ನು ಆಡಲಿಲ್ಲ. ಬದಲಿಗೆ "ನನ್ನಿಂದೇನಾದರೂ ಅಪರಾಧವಾಗಿದ್ದರೆ ಕ್ಷಮಿಸು" ಎಂದು ಹೇಳಿ ಸಂತೋಷದಿಂದ ಕಾಡಿಗೆ ಹೊರಟು ಹೋದ. ಹೀಗೆ ಇನ್ನೊಬ್ಬರ ಸಂತೋಷಕ್ಕಾಗಿ ತ್ಯಾಗಮಾಡಿ ತೋರಿಸಿದ ಅಪೂರ್ವ ಅವತಾರ ರಾಮಾವತಾರ. ರಮೆಯ ಅರಸಾದ ಸೀತಾಪತಿ ಭಗವಂತ, ಈ ಅವತಾರದಲ್ಲಿ ಗಂಡು-ಹೆಣ್ಣಿನ ನಡುವೆ ದಾಂಪತ್ಯ ಜೀವನ ಹೇಗಿರಬೇಕು, ಅಣ್ಣ-ತಮ್ಮಂದಿರ ಪ್ರೀತಿ ಹೇಗಿರಬೇಕು, ತಂದೆ-ತಾಯಿ-ಮಕ್ಕಳ ಬಾಂಧವ್ಯ ಹೇಗಿರಬೇಕು ಎನ್ನುವುದನ್ನು ಸ್ವಯಂ ತೋರಿಸಿ ಕೊಟ್ಟಿದ್ದಾನೆ. ಇದು ಜಗತ್ತಿಗೆ ಆನಂದ ಕೊಟ್ಟ ಭಗವಂತನ ಅಮಿತಾನಂದಸ್ವರೂಪ ವಿಭೂತಿ.

ನೀರಿನಲ್ಲಿರುವ ಮೀನುಗಳಲ್ಲೇ ಅತ್ಯಂತ ಶಕ್ತಿಶಾಲಿ ಮತ್ತು ಅತ್ಯಂತ ದೊಡ್ಡ ಆಕಾರವುಳ್ಳದ್ದು ತಿಮಿಂಗಿಲ. ಕೃಷ್ಣ ಹೇಳುತ್ತಾನೆ "ಝಷಾಣಾಂ ಮಕರಶ್ಚಾಸ್ಮಿ" ಎಂದು. ಇಲ್ಲಿ ಮಕರ ಎಂದರೆ ತಿಮಿಂಗಿಲ. ಭಗವಂತ ಮಕರಃ ಶಬ್ದವಾಚ್ಯನಾಗಿ ತಿಮಿಂಗಿಲನಲ್ಲಿ ವಿಶೇಷ ವಿಭೂತಿಯಾಗಿ ಅದಕ್ಕೆ ಆ ಶಕ್ತಿಯನ್ನು ಕೊಟ್ಟ. ತಿಳಿವನ್ನು(ಮ) ಕೊಡುವ(ಕರ) ಭಗವಂತ ಮಕರಃ.

"ನದಿಗಳಲ್ಲಿ ಗಂಗೆ ನಾನು" ಎನ್ನುತ್ತಾನೆ ಕೃಷ್ಣ. ನದಿಗಳಲ್ಲೇ ಶ್ರೇಷ್ಠ-ಗಂಗೆ. ಈ ನದಿ ನೀರಿಗೆ ಸಾಟಿಯಾದ ಔಷಧ ಇನ್ನೊಂದಿಲ್ಲ. ಗಂಗೆಯಲ್ಲಿ ಮಿಂದರೆ ನಾವು ನಮ್ಮ ಮನಃ ಶುದ್ಧಿ ಮಾಡಿಕೊಳ್ಳಬಹುದು. ಅಲ್ಲಿರುವ ಯಾವುದೇ ಕೊಳೆ ನಮಗಂಟದು. ಶೇಖರಿಸಿಟ್ಟರೆ ಎಂದೂ ಕೆಡದ ನೀರು ಗಂಗೆ. ಗಂಗೆಗೆ ಈ ಮಹಾನ್ ಶಕ್ತಿಯನ್ನು ಕೊಟ್ಟ ಭಗವಂತನ ವಿಭೂತಿನಾಮ 'ಜಾಹ್ನವಿ'. 'ಜಹ್ನು' ಅಂದರೆ ತೊರೆಯುವುದು. ಕ್ಷುದ್ರ ಭೌತಿಕ ಬಯಕೆಗಳನ್ನು ತೊರೆದು, ಭಗವಂತನ ಮಾರ್ಗದಲ್ಲಿ ಸಾಗುವವರ ರಕ್ಷಣೆ ಮಾಡುವ ಭಗವಂತ 'ಜಾಹ್ನವಿ'. ಇದು ಭಗವಂತನ ಸ್ತ್ರೀರೂಪ ಪ್ರತೀಕ ನಾಮ. ತಾಯಿಯಂತೆ ಸಲಹುವ ಭಗವಂತನನ್ನು ಸ್ತ್ರೀ ರೂಪದಲ್ಲಿ ಕೂಡಾ ಉಪಾಸನೆ ಮಾಡುತ್ತಾರೆ. ಜಾಹ್ನವಿ ಭಗವಂತನ ಸ್ತ್ರೀರೂಪದ ನಾಮ.

ಸರ್ಗಾಣಾಮಾದಿರಂತಶ್ಚ ಮಧ್ಯಂ ಚೈವಾಹಮರ್ಜುನ ।
ಅಧ್ಯಾತ್ಮವಿದ್ಯಾ ವಿದ್ಯಾನಾಂ ವಾದಃ ಪ್ರವದತಾಮಹಮ್ ॥೩೨॥

ಸರ್ಗಾಣಾಮ್ ಆದಿಃ ಅಂತಃ ಚ ಮಧ್ಯಮ್ ಚ ಏವ ಅಹಮ್ ಅರ್ಜುನ ।
ಅಧ್ಯಾತ್ಮವಿದ್ಯಾ ವಿದ್ಯಾನಾಮ್ ವಾದಃ ಪ್ರವದತಾಮ್ ಅಹಮ್–ಓ ಅರ್ಜುನಾ, ಜೀವಿಗಳ ಹುಟ್ಟಿಗೆ, ಸಾವಿಗೆ, ಇರವಿಗೆ ಕಾರಣ ನಾನು. ಅರಿವುಗಳಲ್ಲಿ ಅಧ್ಯಾತ್ಮದ ಅರಿವು ನಾನು. [ಜೀವರಿಗೆ ಒಡೆಯನಾದ್ದರಿಂದ 'ಅಧ್ಯಾತ್ಮ' ಎನ್ನಿಸಿ, ಜ್ಞಾನರೂಪನಾದ್ದರಿಂದ 'ವಿದ್ಯಾ' ಎನ್ನಿಸಿ ಅಧ್ಯಾತ್ಮ ವಿದ್ಯೆಯಲ್ಲಿದ್ದೇನೆ.] ಚರ್ಚಿಸುವವರ ಚರ್ಚೆಯಲ್ಲಿ [ತತ್ವದ ತಿಳಿವಿಗಾಗಿ ನಡೆಸುವ] ವಾದ ನಾನು. [ಎಲ್ಲಾ ನಾಮಗಳಿಂದ ವಾಚ್ಯನಾಗಿ 'ವಾದ' ಎನ್ನಿಸಿ ವಾದದಲ್ಲಿದ್ದೇನೆ.]

ಪ್ರಪಂಚದಲ್ಲಿ ಇರುವ ಪ್ರತಿಯೊಂದು ವಸ್ತುವಿನಲ್ಲಿಯೂ ಭಗವಂತನ ವಿಭೂತಿ ಅಡಗಿದೆ. ನಮಗೆ ಮೇಲ್ನೋಟಕ್ಕೆ ವ್ಯರ್ಥವೆಂದು ಕಾಣುವ ವಸ್ತುವಿನಲ್ಲೂ ಕೂಡಾ ಇನ್ನೊಂದು ವಸ್ತುವಿನಲ್ಲಿರದ ಒಂದು ವಿಶಿಷ್ಟಗುಣ(**Exclusive Quality**) ಅಡಗಿರುತ್ತದೆ. ಆದ್ದರಿಂದ ಒಂದು ಹುಲ್ಲುಕಡ್ಡಿಯಿಂದ ಹಿಡಿದು ಚತುರ್ಮುಖ ಬ್ರಹ್ಮನವರೆಗೆ ಎಲ್ಲವೂ ಭಗವಂತನ ವಿಭೂತಿ. ಇಲ್ಲಿ ಕೃಷ್ಣ ಕೇವಲ ಆ ಗುಂಪಿನಲ್ಲಿ ವಿಶಿಷ್ಟಭೂತಿಯನ್ನು ಹೇಳಿದ್ದಾನೆ ಅಷ್ಟೆ. ಜೀವ ಹುಟ್ಟುವ ಮೊದಲು ಇದ್ದವ, ಜೀವದ ಇರವಿಗೆ ಕಾರಣನಾದವ, ಕೊನೆಗೆ ಸಂಹಾರಶಕ್ತಿಯಾಗಿ ನಿಲ್ಲುವವ ಆ ಭಗವಂತ. ಹೀಗೆ "ಹುಟ್ಟುವಾಗ, ಇರುವಾಗ ಮತ್ತು ಅಂತದಲ್ಲೂ ನಾನಿದ್ದೇನೆ" ಎನ್ನುತ್ತಾನೆ ಕೃಷ್ಣ. "ಈ ವಿಷಯ-ಜ್ಞಾನಾರ್ಜನ ಮಾಡಿದ, ಸಾತ್ವಿಕನಾದ, ನಿನಗೆ ತಿಳಿದೇ ಇದೆ" ಎನ್ನುವ ಅರ್ಥದಲ್ಲಿ ಕೃಷ್ಣ ಇಲ್ಲಿ ಪಾರ್ಥನನ್ನು 'ಅರ್ಜುನ' ಎಂದು ವಿಶೇಷವಾಗಿ ಸಂಬೋಧಿಸಿದ್ದಾನೆ.
"ಅರಿವುಗಳಲ್ಲಿ ಅಧ್ಯಾತ್ಮದ ಅರಿವು ನಾನು" ಎನ್ನುತ್ತಾನೆ ಕೃಷ್ಣ. ಭಗವಂತನನ್ನು ಸ್ಪರ್ಶಮಾಡುವ ಅಧ್ಯಾತ್ಮ ವಿದ್ಯೆಯಲ್ಲಿ ಪರಮಾತ್ಮ ತುಂಬಿದ್ದಾನೆ. ಎಲ್ಲಾ ಆತ್ಮಗಳಿಗೆ ಹಿರಿದಾದ ಭಗವಂತ ಅಧಿಕ-ಆತ್ಮ(ಅಧ್ಯಾತ್ಮ). ಅಧ್ಯಾತ್ಮ ವಿದ್ಯೆಯನ್ನು ಪಡೆಯಬೇಕಾದರೆ ನಾವು ಇನ್ನೊಬ್ಬರೊಂದಿಗೆ ಸಂವಾದ ಮಾಡಬೇಕು. ಇದು ನಮ್ಮ ತಿಳುವಳಿಕೆಯನ್ನು ಹೆಚ್ಚಿಸಿಕೊಳ್ಳುವುದಕ್ಕಾಗಿ, ಜ್ಞಾನ ದಾಹವನ್ನು ಇಂಗಿಸಿಕೊಳ್ಳುವುದಕ್ಕಾಗಿ ಮಾಡುವ ಶಾಸ್ತ್ರೀಯ ಚರ್ಚೆ. ಇಂತಹ ಚರ್ಚೆಯಲ್ಲಿ 'ವಾದಃ' ಶಬ್ದವಾಚ್ಯನಾಗಿ ಭಗವಂತನಿರುತ್ತಾನೆ. ಎಲ್ಲಾ ನಾಮಗಳಿಂದ ವಾಚ್ಯನಾದ ಭಗವಂತ ವಾದಃ.

ಅಕ್ಷರಾಣಾಮಕಾರೋಽಸ್ಮಿ ದ್ವಂದ್ವಃ ಸಾಮಾಸಿಕಸ್ಯ ಚ ।
ಅಹಮೇವಾಕ್ಷಯಃ ಕಾಲೋ ಧಾತಾಽಹಂ ವಿಶ್ವತೋಮುಖಃ ॥೩೩॥

ಅಕ್ಷರಾಣಾಮ್ ಅಕಾರಃ ಅಸ್ಮಿ ದ್ವಂದ್ವಃ ಸಾಮಾಸಿಕಸ್ಯ ಚ ।
ಅಹಮ್ ಏವ ಅಕ್ಷಯಃ ಕಾಲಃ ಧಾತಾ ಅಹಮ್ ವಿಶ್ವತೋಮುಖಃ –ಅಕ್ಷರಗಳಲ್ಲಿ ಮೊದಲ ಅಕಾರ ನಾನು. ['ಅ' ಎಂದು ಕರೆಸಿಕೊಂಡು, 'ಅಕಾರ' ಎನ್ನಿಸಿ ಅ-ಕಾರದಿಂದ ವಾಚ್ಯನಾಗಿದ್ದೇನೆ.] ಸಮಾಸಗಳ ಗುಂಪಿನಲ್ಲಿ ದ್ವಂದ್ವ

ಸಮಾಸ ನಾನು. [ಎರಡು ರೂಪಗಳಿಂದ ಒಳಗೂ ಹೊರಗೂ ಇರುವುದರಿಂದ 'ದ್ವಂದ್ವ' ಎನ್ನಿಸಿ ದ್ವಂದ್ವ ಸಮಾಸದಲ್ಲಿದ್ದೇನೆ.] ಅಳಿವಿರದ ನಾನೇ [ಕಾಲದಲ್ಲಿದ್ದು] ಕಬಳಿಸುವವನು. ಎಲ್ಲೆಡೆ ತುಂಬಿದ್ದು ಎಲ್ಲವನ್ನು ಸಲಹುವವನೂ ನಾನೇ.

ಹಿಂದೆ ಶಬ್ದಗಳಲ್ಲಿ ಓಂಕಾರವನ್ನು ಹೇಳಿದ್ದ ಕೃಷ್ಣ, ಇಲ್ಲಿ ಅಕ್ಷರದಲ್ಲಿ ತನ್ನ ವಿಭೂತಿಯನ್ನು ಹೇಳುತ್ತಾ ಹೇಳುತ್ತಾನೆ: "ಅಕ್ಷರಾಣಾಮಕಾರೋಸ್ಮಿ" ಎಂದು. 'ಅ' ಪೂರ್ತಿಯಾಗಿ ಭಗವಂತನ ಎಲ್ಲಾ ಗುಣಗಳನ್ನೂ ಹೇಳುವ ವಿಶಿಷ್ಟ ಅಕ್ಷರ. ಅ- ಅಂದರೆ 'ಅಲ್ಲ'. ಭಗವಂತ 'ಅಲ್ಲ'. ಅಂದರೆ ನಮಗೆ ತಿಳಿದಿರುವ ಯಾವ ವಸ್ತುವೂ ಅವನಲ್ಲ. ಆತ ಪ್ರಪಂಚದಿಂದ ವಿಲಕ್ಷಣ. ಇಂತಹ ಭಗವಂತ 'ಇಲ್ಲ'. ಅಂದರೆ ಆತನಲ್ಲಿ ಯಾವ ದೋಷವೂ ಇಲ್ಲ. ಆತ ಸರ್ವಗುಣಪೂರ್ಣ. ಹೀಗೆ ಸರ್ವವಿಲಕ್ಷಣ, ಸರ್ವದೋಷದೂರ, ಸರ್ವಗುಣಪೂರ್ಣ ಭಗವಂತ ಅ-ಕಾರವಾಚ್ಯನಾಗಿ 'ಅ'ಕಾರದಲ್ಲಿ ತುಂಬಿದ್ದಾನೆ.

ಅಕ್ಷರದ ನಂತರ ಸಮಾಸಗಳ ಬಗ್ಗೆ ಹೇಳುತ್ತಾ ಕೃಷ್ಣ ಹೇಳುತ್ತಾನೆ: "ದ್ವಂದ್ವಃ ಸಾಮಾಸಿಕಸ್ಯ" ಎಂದು. ನಮಗೆ ತಿಳಿದಂತೆ ಯಾವುದೇ ಸಮಾಸವಾಗಬೇಕಾದರೆ ಅಲ್ಲಿ ಎರಡು ಶಬ್ದವಿರಬೇಕು (ಅಥವಾ ಒಂದು ಶಬ್ದ ಮತ್ತು ಒಂದು ಪ್ರತ್ಯಯವಿರಬೇಕು). ಇತರ ಎಲ್ಲಾ ಸಮಾಸಗಳಲ್ಲಿ ಒಂದು ಪದ, ಅಥವಾ ಎರಡೂ ಪದ(ಬಹುವ್ರೀಹಿ) ತನ್ನ ಪ್ರಾಧಾನ್ಯತೆಯನ್ನು ಕಳೆದುಕೊಳ್ಳಬಹುದು. ಆದರೆ ದ್ವಂದ್ವ ಸಮಾಸದಲ್ಲಿ ಎರಡೂ ಪದಗಳು ಮುಖ್ಯ. ಉಭಯಪದ ಪ್ರಧಾನ ಸಮಾಸವಾದ ದ್ವಂದ್ವ ಸಮಾಸದಲ್ಲಿ ಭಗವಂತ ದ್ವಂದ್ವಃ ನಾಮಕನಾಗಿ ತುಂಬಿದ್ದಾನೆ. ಎರಡು ರೂಪದಿಂದ ನಮ್ಮ ಒಳಗೂ-ಹೊರಗೂ ತುಂಬಿರುವ ಭಗವಂತ ದ್ವಂದ್ವಃ.

ಎಲ್ಲವನ್ನು ಸಂಹಾರ ಮಾಡುವ ಕಾಲಪುರುಷ ಭಗವಂತ, ಎಲ್ಲವನ್ನು ಧಾರಣೆ ಮಾಡಿ, ಪೋಷಣೆ ಮಾಡುವ 'ಧಾತ'. ಇಂತಹ ಭಗವಂತ ವಿಶ್ವತೋಮುಖಃ. ಆತ ಎಲ್ಲೆಡೆ ತುಂಬಿದ್ದಾನೆ. ಆತನಿಲ್ಲದ ತಾಣವಿಲ್ಲ. ಆತ ಕಾಣದ ಎಡೆಯಿಲ್ಲ.

ಮೃತ್ಯುಃ ಸರ್ವಹರಶ್ಚಾಹಮುದ್ಭವಶ್ಚ ಭವಿಷ್ಯತಾಮ್ ।
ಕೀರ್ತಿಃ ಶ್ರೀರ್ವಾಕ್ ಚ ನಾರೀಣಾಂ ಸ್ಮೃತಿರ್ಮೇಧಾ ಧೃತಿಃ ಕ್ಷಮಾ ॥೩೪॥

ಮೃತ್ಯುಃ ಸರ್ವ ಹರಃ ಚ ಅಹಮ್ ಉದ್ಭವಃ ಚ ಭವಿಷ್ಯತಾಮ್ ।
ಕೀರ್ತಿಃ ಶ್ರೀಃ ವಾಕ್ ಚ ನಾರೀಣಾಂ ಸ್ಮೃತಿಃ ಮೇಧಾ ಧೃತಿಃ ಕ್ಷಮಾ –ಎಲ್ಲವನ್ನೂ ಕಬಳಿಸುವ ಮೃತ್ಯುದೇವತೆ [ಸಾಯಿಸುವವನಾದ್ದರಿಂದ 'ಮೃತ್ಯು'ನಾಮಕನಾಗಿ, ಯಮನ ಪರಿವಾರ ದೇವತೆಯಾದ ಮೃತ್ಯುವಿನಲ್ಲಿದ್ದು ಅವನಿಗೆ ಎಲ್ಲವನ್ನೂ ಕಬಳಿಸುವ ಶಕ್ತಿಯಿತ್ತವನು] ನಾನು. ಮುಂದೆ ಆಗುವವರನ್ನು ಹುಟ್ಟಿಸುವವನೂ ನಾನು. ಹೆಂಗಸರಲ್ಲಿ ಕೀರ್ತಿಯ ದೇವತೆ ನಾನು; ಶ್ರೀದೇವಿ ನಾನು; ವಾಗ್ದೇವಿ ನಾನು. ಸ್ಮರಣಶಕ್ತಿಯ ದೇವತೆ ನಾನು; ಧಾರಣಶಕ್ತಿಯ ದೇವತೆ ನಾನು; ಸಹನೆಯ ದೇವತೆ ನಾನು; ಕ್ಷಮಾ ದೇವಿ ನಾನು.[ಕೀರ್ತನೀಯವಾಗಿ 'ಕೀರ್ತಿ' ಎನ್ನಿಸಿ ಕೀರ್ತಿದೇವಿಯಲ್ಲಿದ್ದೇನೆ; ಆಶ್ರಯನಾಗಿ 'ಶ್ರೀ' ಎನ್ನಿಸಿ ಶ್ರೀದೇವಿಯಲ್ಲಿದ್ದೇನೆ; ವಕ್ತಾರನಾಗಿ 'ವಾಕ್' ಎನ್ನಿಸಿ ವಾಗ್ದೇವಿಯಲ್ಲಿದ್ದೇನೆ; ಸ್ಮರಣೀಯನಾಗಿ 'ಸ್ಮೃತಿ' ಎನ್ನಿಸಿ ಸ್ಮೃತಿದೇವಿಯಲ್ಲಿದ್ದೇನೆ; ಅರಿವಿನ ಮೂರ್ತಿಯಾಗಿ

'ಧೃತಿ' ಎನ್ನಿಸಿ ಧೃತಿದೇವಿಯಲ್ಲಿದ್ದೇನೆ; ತಪ್ಪುಗಳನ್ನು ಮನ್ನಿಸುವವನಾಗಿ 'ಕ್ಷಮಾ' ಎನ್ನಿಸಿ ಕ್ಷಮಾದೇವಿಯಲ್ಲಿದ್ದೇನೆ.]

ಭಗವಂತ ಪ್ರಳಯಕಾಲದಲ್ಲಿ ಎಲ್ಲವನ್ನು ಕಬಳಿಸುವ ಮೃತ್ಯುದೇವತೆ ಕೂಡಾ ಹೌದು. ಪ್ರಳಯಕಾಲ ನಂತರ ಸೃಷ್ಟಿಯನ್ನು ಪುನಃ ನಿರ್ಮಾಣ ಮಾಡುವವನೂ ಅವನೇ. ಸ್ತ್ರೀ ರೂಪದಲ್ಲಿನ ತನ್ನ ವಿಭೂತಿಯನ್ನು ಹೇಳುತ್ತಾ ಕೃಷ್ಣ ಇಲ್ಲಿ ಮುಖ್ಯವಾಗಿ ಲಕ್ಷ್ಮಿ, ಸರಸ್ವತಿ ಮತ್ತು ಭಾರತಿಯರಲ್ಲಿ ತನ್ನ ವಿಭೂತಿಯನ್ನು ವಿವರಿಸಿದ್ದಾನೆ. ಕೀರ್ತಿ, ಅದೃಷ್ಟ, ಸುಂದರ ಮಾತು, ಸ್ಮರಣಶಕ್ತಿ, ಬುದ್ಧಿಶಕ್ತಿ, ದೃಢತೆ ಮತ್ತು ತಾಳ್ಮೆ -ಇವುಗಳ ಅಭಿಮಾನಿ ದೇವತೆಯರು ಮುಖ್ಯವಾಗಿ ಲಕ್ಷ್ಮಿ, ಸರಸ್ವತಿ ಮತ್ತು ಭಾರತಿಯರು. ಇವರಲ್ಲಿ ಸ್ತ್ರೀರೂಪ ವಿಭೂತಿಯಾಗಿ ಭಗವಂತ ನಿಂತಿದ್ದಾನೆ.

ಬೃಹತ್ಸಾಮ ತಥಾ ಸಾಮ್ನಾಂ ಗಾಯತ್ರಿ ಛಂದಸಾಮಹಮ್ ।
ಮಾಸಾನಾಂ ಮಾರ್ಗಶೀರ್ಷೋऽಹಮೃತೂನಾಂ ಕುಸುಮಾಕರಃ ॥೩೫॥

ಬೃಹತ್ಸಾಮ ತಥಾ ಸಾಮ್ನಾಮ್ ಗಾಯತ್ರೀ ಛಂದಸಾಮ್ ಅಹಮ್ ।
ಮಾಸಾನಾಮ್ ಮಾರ್ಗಶೀರ್ಷಃ ಅಹಮ್ ಋತೂನಾಮ್ ಕುಸುಮಾಕರಃ –ಸಾಮದ ಗಾನಗಳಲ್ಲಿ ಬೃಹತ್ ಸಾಮವೆಂಬ ಗಾನ ನಾನು. [ಬೃಹತ್ =ಹಿರಿದಾದ, ಸ=ಸಾರವಸ್ತು ಮತ್ತು, ಅಮ=ಅರಿವಿಗೆಟುಕದವನಾದ್ದರಿಂದ 'ಬೃಹತ್ಸಾಮ' ಎನ್ನಿಸಿ ಬೃಹತ್ಸಾಮವೆಂಬ ಗಾನದಲ್ಲಿದ್ದೇನೆ]. ಛಂದಸ್ಸುಗಳಲ್ಲಿ ಗಾಯತ್ರಿ ನಾನು. [ಗಾಯ =ಗಾಯಕರನ್ನು ತ್ರಿ=ಸಲಹುವುದರಿಂದ 'ಗಾಯತ್ರಿ' ಎನ್ನಿಸಿ ಗಾಯತ್ರಿ ಛಂದಸ್ಸಿನಲ್ಲಿದ್ದೇನೆ]. ತಿಂಗಳಲ್ಲಿ ಮಾರ್ಗಶಿರ ನಾನು. [ದಾರಿಯ ಕೊನೆಯಲ್ಲಿರುವುದರಿಂದ 'ಮಾರ್ಗಶೀರ್ಷ' ಎನ್ನಿಸಿ ಮಾರ್ಗಶಿರಮಾಸದಲ್ಲಿದ್ದೇನೆ.] ಋತುಗಳಲ್ಲಿ ವಸಂತ ನಾನು. [ಕು=ಕೆಟ್ಟ, ಸು= ಒಳ್ಳೆಯ, ಮಾ=ಅರಿವನ್ನು, ಕರ=ನೀಡುವುದರಿಂದ 'ಕುಸುಮಾಕರ' ಎನ್ನಿಸಿ ವಸಂತ ಋತುವಿನಲ್ಲಿದ್ದೇನೆ.]

ಸಾಮಗಾನದಲ್ಲಿ ಅನೇಕ ವಿಧ. ಸಪ್ತ ಸ್ವರವನ್ನು ಬಳಸಿ ಹಾಡುವುದು ಸಾಮವೇದದಲ್ಲಿ ಮಾತ್ರ. ಇದು ಋಗ್ವೇದ ಯಜುರ್ವೇದದಲ್ಲಿ ಇಲ್ಲ. ಎಲ್ಲಾ ಸಾಮಗಳಲ್ಲಿ ಸಪ್ತಸ್ವರದ ಬಳಕೆ ಇಲ್ಲ. ಈ ರೀತಿ ಸಪ್ತಸ್ವರವಿರುವ ಸಾಮದಲ್ಲಿ "ಬೃಹತ್ಸಾಮವೆಂಬ ಗಾನ ನಾನು" ಎನ್ನುತ್ತಾನೆ ಕೃಷ್ಣ. ಇಲ್ಲಿ ಬಂದಿರುವ ಭಗವಂತನ ನಾಮ 'ಬೃಹತ್ಸಾಮಃ' – ಹಿರಿದಾದ, ಸಾರಭೂತನಾದ ಮತ್ತು ನಮ್ಮ ಅರಿವಿಗೆಟುಕದೆ ಅಮಿತವಾಗಿರುವ ಭಗವಂತ 'ಬೃಹತ್ಸಾಮಃ'.
ಪದ್ಯದ ರೂಪದಲ್ಲಿ ಒಂದು ಅಪೂರ್ವವಾದ ಅರ್ಥವನ್ನು, ಅಧ್ಯಾತ್ಮದ ಸಂದೇಶವನ್ನು ತುಂಬಿಡುವಂತಾದ್ದು- ಛಂದಸ್ಸು. ಇದು ನಮ್ಮ ಅಭಿಪ್ರಾಯವನ್ನು ಲಯಬದ್ಧವಾಗಿ ವ್ಯಕ್ತಪಡಿಸುವ ವಿಧಾನ. ಛಂದಸ್ಸಿನಲ್ಲಿ ಪ್ರಧಾನವಾಗಿ ಏಳು ಛಂದಸ್ಸುಗಳಿವೆ. 24 ಅಕ್ಷರದ ಗಾಯತ್ರಿ, 28 ಅಕ್ಷರದ ಉಷ್ಣಿಕ್, 32 ಅಕ್ಷರದ ಅನುಷ್ಟುಪ್, 36 ಅಕ್ಷರದ ಬೃಹತೀ, 40 ಅಕ್ಷರದ ಪಂಕ್ತಿ, 44 ಅಕ್ಷರದ ತ್ರಿಷ್ಟುಪ್ ಮತ್ತು 48 ಅಕ್ಷರದ ಜಗತೀ. ಈ ಛಂದಸ್ಸುಗಳಲ್ಲಿ ಭಗವಂತನ ವಿಶೇಷ ವಿಭೂತಿ ಇರುವ ಛಂದಸ್ಸು 'ಗಾಯತ್ರಿ'. ಇದು ಭಗವಂತನ ಹೆಸರು ಕೂಡಾ ಹೌದು.

'ಗಾಯತಂ ತ್ರಾಯತೆ ಇತಿ ಗಾಯತ್ರಿಃ'. ಯಾರು ಭಗವಂತನನ್ನು ಈ ಮಂತ್ರದಿಂದ ಸ್ತೋತ್ರ ಮಾಡುತ್ತಾರೋ ಅವರನ್ನು ಆತ ರಕ್ಷಣೆ ಮಾಡುತ್ತಾನೆ. ಗಾಯತ್ರಿ ಛಂದಸ್ಸು ಏಳು ಛಂದಸ್ಸುಗಳಲ್ಲಿ ಮೊದಲನೆಯದು. ಎಂಟು ಅಕ್ಷರದ ಮೂರು ಪಾದಗಳುಳ್ಳ ಗಾಯತ್ರಿ ಎಲ್ಲದರ ಪಂಚಾಂಗ(Foundation)ದಂತಿದೆ. ಋಗ್ವೇದದಲ್ಲಿನ ಹೆಚ್ಚಿನ ಮಂತ್ರಗಳು ಗಾಯತ್ರಿ ಛಂದಸ್ಸಿನಲ್ಲಿದೆ. ಸಮಸ್ತ ವೇದಗಳ 'ವೇದಮಾತ' ಎನ್ನಿಸಿಕೊಂಡಿರುವ ಗಾಯತ್ರಿ ಮಂತ್ರವಿರುವುದು 'ಗಾಯತ್ರಿ' ಛಂದಸ್ಸಿನಲ್ಲಿ. ಹೀಗೆ ಗಾಯತ್ರಿ ಇತರ ಛಂದಸ್ಸಿಗೆ ಮಾತೃಸ್ಥಾನೀಯವಾಗಿದೆ. ಗಾಯತ್ರಿ ಅಧ್ಯಾತ್ಮದ ಮೂಲಭೂತವಾದ ಮುಖವನ್ನು ಹೊಂದಿರತಕ್ಕಂತಹ ಮಂತ್ರ. ಸೂರ್ಯನಲ್ಲಿರುವ ಸೌರಶಕ್ತಿಯನ್ನು ನಮಗೆ ಹರಿಸುತ್ತ, ಸೌರಮಂಡಲದಲ್ಲಿರುವ ನಮ್ಮ ಜೀವಪ್ರಧಾನವಾದ ಭಗವಂತನ ಸ್ತೋತ್ರ ಮಾಡುವುದು ಗಾಯತ್ರಿ. 'ಇಡೀ ಬ್ರಹ್ಮಾಂಡದ ನಿಯಾಮಕನಾಗಿದ್ದು, ಸೌರ ಶಕ್ತಿಯಿಂದ ಬಂದು, ನಮ್ಮ ಆತ್ಮದ ಒಳಗೆ ನಮ್ಮ ಹೃದಯ ಕಮಲದಲ್ಲಿ 'ಧೀ' ಶಕ್ತಿಯನ್ನು ಪ್ರೇರಣೆ ಮಾಡುವಂತಹ ಶಕ್ತಿ ಭಗವಂತ' ಎನ್ನುವ ಸಮಷ್ಟಿ ಚಿಂತನ ಇರುವ ಮಂತ್ರ ಗಾಯತ್ರಿ. ಗಾಯತ್ರಿ ವಿಶಿಷ್ಟವಾಗಿ(Exclusively) ವೈದಿಕ ಛಂದಸ್ಸಾಗಿ ಬಳಕೆಯಾಗಿದೆ. ಲೌಕಿಕವಾಗಿ ಇದರ ಬಳಕೆ ಇಲ್ಲ. ಗಾಯತ್ರಿಗೆ ಈ ವಿಶಿಷ್ಟ ಸ್ಥಾನ ಭಗವಂತನ ವಿಶೇಷ ವಿಭೂತಿಯಿಂದ ಬಂತು.

[ಇಲ್ಲಿ ಒಂದು ವಿಷಯವನ್ನು ನಾವು ತಿಳಿದಿರಬೇಕು: ಐತರೇಯ ಉಪನಿಷತ್ತಿನಲ್ಲಿ ಬೃಹತೀ ಛಂದಸ್ಸನ್ನು ಶ್ರೇಷ್ಠ ಎಂದು ಹೇಳಿದ್ದಾರೆ. ಇದಕ್ಕೆ ಕಾರಣ ಏನೆಂದರೆ ಅಭಿಮಾನಿ ದೇವತಾ ತಾರತಮ್ಯದಲ್ಲಿ ನೋಡಿದಾಗ ಗಾಯತ್ರಿ ಅಭಿಮಾನಿ ದೇವತೆಯರು ಲಕ್ಷ್ಮಿ, ಸರಸ್ವತಿ, ಭಾರತಿ, ಗರುಡ ಮತ್ತು ಅಗ್ನಿಪತ್ನಿ ಸ್ವಾಹ. ಬೃಹತೀ ಛಂದಸ್ಸನ್ನು ನೋಡಿದಾಗ ಅಲ್ಲಿ ಲಕ್ಷ್ಮಿ, ಸರಸ್ವತಿ, ಭಾರತಿ, ಗರುಡ ಮತ್ತು ಬೃಹಸ್ಪತಿಪತ್ನಿ ತಾರ ಅಭಿಮಾನಿ ದೇವತೆಗಳು. ಅಗ್ನಿಪತ್ನಿ ಸ್ವಾಹಕ್ಕಿಂತ ತಾರ ದೇವತಾ ತಾರತಮ್ಯದಲ್ಲಿ ಎತ್ತರದಲ್ಲಿರುವುದರಿಂದ, ದೇವತಾ ತಾರತಮ್ಯವನ್ನು ಮುಖ್ಯವಾಗಿಟ್ಟುಕೊಂಡು ಅಲ್ಲಿ ಹಾಗೆ ಹೇಳಿದ್ದಾರೆ. ಈ ವಿಚಾರ ತಿಳಿದಾಗ ಇಲ್ಲಿ ಗೊಂದಲವಿಲ್ಲ.]

"ನಾನು ಮಾಸಗಳಲ್ಲಿ ಮಾರ್ಗಶಿರ, ಋತುಗಳಲ್ಲಿ ವಸಂತ" ಎನ್ನುತ್ತಾನೆ ಕೃಷ್ಣ. ಮಾರ್ಗಶಿರಮಾಸ-ಮಾಸಗಳಲ್ಲಿ ಮೊದಲನೇ ಮಾಸ; ಕಾರ್ತಿಕ ಕೊನೆಯ ಮಾಸ. ಈ ಕಾರಣಕ್ಕಾಗಿ ಕಾರ್ತಿಕ ಮಾಸದಲ್ಲಿ (ಮಾರ್ಗಶಿರ ಮಾಸದ ಮೊದಲು) ದೀಪಾವಳಿಯನ್ನು ಆಚರಿಸುತ್ತಾರೆ. ಒಂದು ವರ್ಷವನ್ನು ಕೃತಜ್ಞತೆಯಿಂದ ಕಳುಹಿಸಿಕೊಡುವುದು ದೀಪಾವಳಿಯ ಮಹತ್ವ. ಮಾರ್ಗಶಿರಕ್ಕೆ ಆಗ್ರ-ಹಾಯಣ ಎನ್ನುತ್ತಾರೆ. ಹಾಯಣ ಎಂದರೆ ಮಾಸ. ಆಗ್ರ ಅಂದರೆ ಮೊದಲನೆಯದು. ನಾವು ಗೀತಾಜಯಂತಿಯನ್ನು ಈ ಮಾಸದಲ್ಲಿ ಆಚರಿಸುತ್ತೇವೆ. ಇದರಿಂದ ಕೃಷ್ಣ ಅರ್ಜುನನಿಗೆ ಗೀತೋಪದೇಶ ಮಾಡಿದ ಮಾಸ ಕೂಡಾ ಮಾರ್ಗಶಿರ ಎನ್ನಬಹುದು(ಈ ಬಗ್ಗೆ ಇನ್ನೂ ಹೆಚ್ಚಿನ ಸಂಶೋಧನೆ ಅಗತ್ಯ). ಈ ಮಾಸದಲ್ಲಿ ವಿಭೂತಿಯಾಗಿ ಕುಳಿತಿರುವ ಭಗವಂತನ ವಿಭೂತಿನಾಮ 'ಮಾರ್ಗಶೀರ್ಷ'. ಸಾಧನಾ ಮಾರ್ಗದಲ್ಲಿ ನಾವು ಸಾಗಬೇಕಾದ ಮಾರ್ಗದ ತುತ್ತತುದಿಯಾದ ಆ ಭಗವಂತ 'ಮಾರ್ಗಶೀರ್ಷ'. ಹೂ ಅರಳಿ ಗಿಡಮರಗಳು ಚಿಗುರುವ ವಸಂತ ಋತುವಿನಲ್ಲಿ 'ಕುಸುಮಾಕರನಾಗಿ' ನಾನಿದ್ದೇನೆ ಎನ್ನುತ್ತಾನೆ ಕೃಷ್ಣ. ಕೆಟ್ಟವರಿಗೆ ಕುಸ್ಸಿತವಾದ ಮತ್ತು ಸಜ್ಜನರಿಗೆ ಉತ್ತಮ ಜ್ಞಾನವನ್ನು ಕೊಡುವ ಭಗವಂತ 'ಕುಸುಮಾಕರಃ'.

ದ್ಯೂತಂ ಛಲಯತಾಮಸ್ಮಿ ತೇಜಸ್ತೇಜಸ್ವಿನಾಮಹಮ್ ।
ಜಯೋSಸ್ಮಿ ವ್ಯವಸಾಯೋSಸ್ಮಿ ಸತ್ತ್ವಂ ಸತ್ತ್ವವತಾಮಹಮ್ ॥೩೬॥

ದ್ಯೂತಮ್ ಛಲಯತಾಮ್ ಅಸ್ಮಿ ತೇಜಃ ತೇಜಸ್ವಿನಾಮ್ ಅಹಮ್ ।
ಜಯಃ ಅಸ್ಮಿ ವ್ಯವಸಾಯಃ ಅಸ್ಮಿ ಸತ್ತ್ವಮ್ ಸತ್ತ್ವವತಾಮ್ ಅಹಮ್–ಮೋಸಗಾರರ ಜೂಜು ನಾನು. [ಕ್ರೀಡಾರೂಪನಾಗಿ 'ದ್ಯೂತ' ಎನ್ನಿಸಿ ಜೂಜಿನಲ್ಲಿದ್ದೇನೆ.] ವೀರರಾದವರ ಬೀರ ನಾನು. [ಪ್ರಕಾಶರೂಪನಾದ್ದರಿಂದ 'ತೇಜಸ್' ಎನ್ನಿಸಿ ಬೀರದಲ್ಲಿದ್ದೇನೆ.] ಗೆಲುವು ನಾನು. [ಎಲ್ಲವನ್ನು ಗೆದ್ದವನಾಗಿ 'ಜಯ' ಎನ್ನಿಸಿ ಗೆಲುವಿನಲ್ಲಿದ್ದೇನೆ.] ದುಡಿಮೆ ನಾನು. [ನಿಶ್ಚಯ ಜ್ಞಾನರೂಪನಾದ್ದರಿಂದ 'ವ್ಯವಸಾಯ' ಎನ್ನಿಸಿ ದುಡಿಮೆಯಲ್ಲಿದ್ದೇನೆ.] ಹಿರಿಯ ವ್ಯಕ್ತಿಗಳ ಘನತೆ ನಾನು.[ಸದ್ಗುಣಗಳ ಗಣಿಯಾಗಿ 'ಸತ್ತ್ವ' ಎನ್ನಿಸಿ ದೊಡ್ಡವರ ಘನತೆಯಲ್ಲಿದ್ದೇನೆ.]

ಕೌರವ ಪಾಂಡವರ ನಡುವೆ ಯುದ್ಧವಾಗಲು ಕಾರಣವಾಗಿ ಕಾಣುವುದು ದ್ಯೂತ. ಇದು ಮೋಸಗಾರಿಕೆಯಲ್ಲಿ ಅತ್ಯಂತ ಶ್ರೇಷ್ಠ ಕಲೆ! ಭಗವಂತ 'ದ್ಯೂತ' ಎನ್ನಿಸಿ ಜೂಜಿನಲ್ಲಿದ್ದಾನೆ. ಇಲ್ಲಿ ಭಗವಂತನ ನಾಮ 'ದ್ಯೂತ'. ದಿವು ಅಂದರೆ ಕ್ರೀಡೆ. ಸದಾ ಸೃಷ್ಟಿ ಸ್ಥಿತಿ ಸಂಹಾರಗಳ ಕ್ರೀಡೆಯಲ್ಲಿ ನಿರತನಾದ ಭಗವಂತ 'ದ್ಯೂತ' ಶಬ್ದ ವಾಚ್ಯ. ಆತ್ಮಬಲವುಳ್ಳವರ ತೇಜಸ್ಸು ಭಗವಂತ. ಜಯಃ ನಾಮಕನಾಗಿ ಗೆಲುವಿನಲ್ಲಿ ಭಗವಂತನಿದ್ದಾನೆ. ಜಗತ್ತಿನ ಎಲ್ಲಾ ವಿಜಯಗಳ ಪ್ರೇರಕ ಭಗವಂತ. ಒಂದು ಕಾರ್ಯದಲ್ಲಿ ಉತ್ಸಾಹದಿಂದ ತೊಡಗುವಂತೆ ಮಾಡುವವನು 'ವ್ಯವಸಾಯ' ನಾಮಕ ಭಗವಂತ. ಬಲನಿಯಾಮಕನಾಗಿ ಆತ ಬಲಶಾಲಿಗಳಲ್ಲಿ 'ಸತ್ವ' ನಾಮಕನಾಗಿ ಕೂತಿದ್ದಾನೆ.

ವೃಷ್ಣೀನಾಂ ವಾಸುದೇವೋಽಸ್ಮಿ ಪಾಂಡವಾನಾಂ ಧನಂಜಯಃ ।
ಮುನೀನಾಮಪ್ಯಹಂ ವ್ಯಾಸಃ ಕವೀನಾಮುಶನಾ ಕವಿಃ ॥೩೭॥

ವೃಷ್ಣೀನಾಮ್ ವಾಸುದೇವಃ ಅಸ್ಮಿ ಪಾಂಡವಾನಾಮ್ ಧನಂಜಯಃ ।
ಮುನೀನಾಮ್ ಅಪಿ ಅಹಮ್ ವ್ಯಾಸಃ ಕವೀನಾಮ್ ಉಶನಾ ಕವಿಃ – ವೃಷ್ಣಿವಂಶದ ರಾಜನ್ಯರಲ್ಲಿ [ವಾಸು=ಎಲ್ಲವನ್ನೂ ಆವರಿಸಿ, ಎಲ್ಲದರೊಳಗೂ ನೆಲೆಸಿರುವ, ದೇವ=ದಿವ್ಯರೂಪನಾದ್ದರಿಂದ] ವಾಸುದೇವನಾಗಿ ಅವತರಿಸಿದ್ದೇನೆ. ಪಾಂಡವರಲ್ಲಿ ಅರ್ಜುನ ನಾನು. [ಸಿರಿಯನ್ನು ಗೆದ್ದವನಾಗಿ 'ಧನಂಜಯ' ಎನ್ನಿಸಿ ಅರ್ಜುನನಲ್ಲಿದ್ದೇನೆ.] ಮುನಿಗಳಲ್ಲಿ [ವಿ=ಎಲ್ಲಕ್ಕಿಂತ ವಿಶಿಷ್ಟನಾಗಿ, ಆ=ಎಲ್ಲೆಡೆಯೂ, ಸಃ =ಅವನೇ ತುಂಬಿರುವುದರಿಂದ] ವ್ಯಾಸ ನಾನು. ವಿಜ್ಞಾನಿಗಳಲ್ಲಿ ಹಿರಿಯ ವಿದ್ವಾಂಸನಾದ ಶುಕ್ರ ನಾನು. [ಇಚ್ಛಾರೂಪನಾದ್ದರಿಂದ 'ಉಶನಸ್' ಎನ್ನಿಸಿ ದೈತ್ಯಗುರು ಶುಕ್ರನಲ್ಲಿದ್ದೇನೆ.]

ಸಾಕ್ಷಾತ್ ವಿಭೂತಿಯನ್ನು ಹೇಳುತ್ತಾ ಕೃಷ್ಣ ಹೇಳುತ್ತಾನೆ "ವೃಷ್ಣೀನಾಮ್ ವಾಸುದೇವಃ ಅಸ್ಮಿ" ಎಂದು. ಇಲ್ಲಿ ಭಗವಂತನ ವಿಭೂತಿ ನಾಮ 'ವಾಸುದೇವಃ'. ಎಲ್ಲೆಡೆ ಇದ್ದರೂ ಕಾಣಿಸದೆ, ಅಪರೋಕ್ಷ ಜ್ಞಾನವನ್ನು ಕರುಣಿಸಿ ಪ್ರತ್ಯಕ್ಷನಾಗುವ ಭಗವಂತ ವಾಸುದೇವಃ. ಪಾಂಡವರಲ್ಲಿ 'ಧನಂಜಯಃ' ನಾನು ಎನ್ನುತ್ತಾನೆ ಕೃಷ್ಣ. ಇದು ಏಕದೇಶ ವಿಭೂತಿ. ಅರ್ಜುನನಲ್ಲಿ ಭಗವಂತನ ವಿಶೇಷ ಆವೇಶ ಇತ್ತು. ಆತನಲ್ಲಿ ಭಗವಂತ 'ಧನಂಜಯಃ' ನಾಮಕನಾಗಿ ನಿಂತಿದ್ದ. ಧನಂಜಯಃ ಎನ್ನುವಲ್ಲಿ ಧನ ಎಂದರೆ ಜ್ಞಾನ. ಭಗವಂತನ ಅರಿವು, ಅದರಿಂದ

ಪಡೆಯುವ ಮೋಕ್ಷ ಶಾಶ್ವತ ಧನ. ಅದನ್ನು ಕೊಡುವ ಭಗವಂತ ಧನಂಜಯಃ. ಮುನಿಗಳಲ್ಲಿ ವ್ಯಾಸ. ಇದು ಭಗವಂತನ ಸಾಕ್ಷಾತ್ ವಿಭೂತಿ. ವ್ಯಾಸರು ವೇದವನ್ನು 1137 ಸಂಹಿತೆಯಾಗಿ ವಿಭಾಗಮಾಡಿ ಜ್ಞಾನಿಗಳ ಮುಖೇನ ನಮಗೆ ಕೊಟ್ಟಿದ್ದಾರೆ. ಪ್ರಧಾನವಾಗಿ ವೇದಗಳು ನಾಲ್ಕು. ಪದ್ಯ ಸಂಕಲನ ಋಗ್ವೇದ, ಗದ್ಯ ಸಂಕಲನ ಯಜುರ್ವೇದ, ಗಾನಕ್ಕೋಸ್ಕರ ಸಾಮವೇದ, ಅಥರ್ವ ಮುನಿ ಬ್ರಹ್ಮನಿಂದ ಉಪದೇಶ ಪಡೆದು ಬರೆದ ಅಥರ್ವಣ ವೇದ. ಮೂಲಭೂತವಾಗಿ ವೇದಗಳು ಮೂರು ಆದರೆ ಋಷಿ ಸಂಪ್ರದಾಯದಿಂದ ನಾಲ್ಕು ವೇದಗಳ ಸೃಷ್ಟಿಯಾಯಿತು. ಇದನ್ನೇ ವೇದವ್ಯಾಸರು ನಾಲ್ಕು ಜನ ಮುನಿಗಳಿಗೆ (ಪೈಲ, ವೈಶಂಪಾಯನ, ಸುಮಂತು ಮತ್ತು ಜೈಮಿನಿಗೆ) ಹೇಳಿದರು. ಈ ನಾಲ್ಕು ಮುನಿಗಳು ಮತ್ತೆ ವೇದವನ್ನು ಅನೇಕ ಶಾಖೆಗಳಾಗಿ(ಸಂಹಿತೆ) ವಿಂಗಡಿಸಿದರು. ಋಗ್ವೇದದಲ್ಲಿ 24 ಸಂಹಿತೆಗಳಿವೆ; ಯಜುರ್ವೇದದಲ್ಲಿ ಪ್ರಮುಖವಾಗಿ ಎರಡು ಶಾಖೆ. ಒಂದು ಶುಕ್ಲ ಯಜುರ್ವೇದ ಹಾಗೂ ಇನ್ನೊಂದು ಕೃಷ್ಣ ಯಜುರ್ವೇದ. ಶುಕ್ಲ ಯಜುರ್ವೇದದಲ್ಲಿ 15 ಸಂಹಿತೆ, ಹಾಗೂ ಕೃಷ್ಣ ಯಜುರ್ವೇದದಲ್ಲಿ 86 ಸಂಹಿತೆ, ಒಟ್ಟು 101 ಸಂಹಿತೆ. ಸಾಮವೇದದಲ್ಲಿ 1000 ಶಾಖೆಗಳು, ಒಂದು ಸಾವಿರ ಬಗೆಯ ಗಾನ ಪದ್ಧತಿ! ಆದರೆ ಇಂದು ಕೇವಲ ಮೂರು (ಜೈಮಿನಿಯ, ರಣಾಯನಿಯ ಹಾಗೂ ಕೌತುಮನ) ಗಾನಪದ್ಧತಿ ಮಾತ್ರ ಪ್ರಚಲಿತದಲ್ಲಿದೆ. ಅಥರ್ವ ವೇದದಲ್ಲಿ ಒಟ್ಟು 12 ಶಾಖೆಗಳು. ಹೀಗೆ ವೇದವನ್ನು 1137 (24+101+12+1000) ಸಂಹಿತೆಗಳಾಗಿ ವಿಂಗಡಿಸಿ ವಿಸ್ತಾರ ಮಾಡಿದ ಮುನಿ ವ್ಯಾಸ. ಮನುಷ್ಯ ಸ್ವಭಾವದ ಬುದ್ಧಿ ವೈಚಿತ್ರ್ಯದ ಜ್ಞಾನ ಸಾಗರವನ್ನು ನಮ್ಮ ಮುಂದೆ ತೆರೆದಿಟ್ಟ, ಎಲ್ಲೆಡೆ ತುಂಬಿರುವ ಭಗವಂತ ವ್ಯಾಸಃ. ದೈತ್ಯ ಗುರು ಶುಕ್ರಾಚಾರ್ಯರಲ್ಲಿ 'ಉಶನ' ನಾಮಕನಾಗಿ ಭಗವಂತ ನಿಂತ. ಈ ಕಾರಣದಿಂದ ಗ್ರಹಗಳಲ್ಲಿ ಶುಕ್ರ ಒಬ್ಬನಾಗಿ ಸ್ಥಾನ ಪಡೆದ. ತನ್ನ ಇಚ್ಛಾಮಾತ್ರದಿಂದಲೇ ಎಲ್ಲಾ ಕಾರ್ಯವನ್ನು ಮಾಡುವ ಭಗವಂತ 'ಉಶನ'

ದಂಡೋ ದಮಯತಾಮಸ್ಮಿ ನೀತಿರಸ್ಮಿ ಜಿಗೀಷತಾಮ್ ।
ಮೌನಂ ಚೈವಾಸ್ಮಿ ಗುಹ್ಯಾನಾಂ ಜ್ಞಾನಂ ಜ್ಞಾನವತಾಮಹಮ್ ॥೩೮॥

ದಂಡಃ ದಮಯತಾಮ್ ಅಸ್ಮಿ ನೀತಿಃ ಅಸ್ಮಿ ಜಿಗೀಷತಾಮ್ ।
ಮೌನಮ್ ಚ ಏವ ಅಸ್ಮಿ ಗುಹ್ಯಾನಾಮ್ ಜ್ಞಾನಮ್ ಜ್ಞಾನವತಾಮ್ ಅಹಮ್ --ಬಗ್ಗುಬಡಿಯುವವರ ದಂಡನೀತಿ ನಾನು. [ದಂಡಿಸುವವನಾದ್ದರಿಂದ 'ದಂಡ' ಎನ್ನಿಸಿ ದಂಡನೀತಿಯಲ್ಲಿದ್ದೇನೆ.] ಗೆಲ್ಲಬಯಸುವವರ ನಯಗಾರಿಕೆ ನಾನು. [ಗೆಲುವಿನತ್ತ ಕರೆದೊಯ್ಯುವುದರಿಂದ 'ನೀತಿ' ಎನ್ನಿಸಿ ನಯಗಾರಿಕೆಯಲ್ಲಿದ್ದೇನೆ.] ಗುಟ್ಟುಗಳಲ್ಲಿ ಮೌನ ನಾನು. [ಮುನಿಗಳಿಂದ ಸ್ತುತನಾಗಿ 'ಮೌನ' ಎನ್ನಿಸಿ ಮೌನದಲ್ಲಿದ್ದೇನೆ.] ಬಲ್ಲವರ ತಿಳಿವು ನಾನು. [ಅರಿವಿನ ಮೂರ್ತಿಯಾದ್ದರಿಂದ 'ಜ್ಞಾನ' ಎನ್ನಿಸಿ ತಿಳಿವಿನಲ್ಲಿದ್ದೇನೆ.]

"ದುಷ್ಟರನ್ನು ದಮನ ಮಾಡುವ ದಮನಶಕ್ತಿ ನಾನು" ಎನ್ನುತ್ತಾನೆ ಕೃಷ್ಣ. ಈ ದಮನಶಕ್ತಿಯಾಗಿ ವೀರರಲ್ಲಿ ಭಗವಂತ ಕೂತಿದ್ದಾನೆ. ದಂಡ ಎಂದರೆ ಶಿಕ್ಷೆ. ಸಂಸ್ಕೃತದಲ್ಲಿ ಶಿಕ್ಷೆ ಎನ್ನುವುದಕ್ಕೆ ಶಿಕ್ಷಣ ಎನ್ನುವ ಅರ್ಥವಿದೆ. ಆದರೆ ಇಲ್ಲಿ ದಂಡ ಎಂದರೆ ದಂಡಿಸುವುದು(Punishment). ತಪ್ಪು ಮಾಡಿದವರಿಗೆ ದೇವರ ರಾಜ್ಯದಲ್ಲಿ ಕ್ಷಮೆ ಇಲ್ಲ. ನಾವು ಮಾಡಿದ ಕರ್ಮವನ್ನು ನಾವು ಅನುಭವಿಸಲೇಬೇಕು. ತಪ್ಪು ಮಾಡಿದವರಿಗೆ ನಿರ್ದಾಕ್ಷಿಣ್ಯ ಹಾಗೂ ನಿಷ್ಠುರವಾದ

ದಂಡನೆಯನ್ನು ಕೊಡುವ ಭಗವಂತ 'ದಂಡಃ'. ಗೆಲ್ಲುವ ಶಕ್ತಿಯಾಗಿ ಎಲ್ಲರನ್ನು ನಿಯಂತ್ರಣ ಮಾಡುವ ಭಗವಂತ 'ನೀತಿಃ'. ಮನನಶಕ್ತಿಯಾಗಿ ನಿಂತ ಭಗವಂತ 'ಮೌನಃ'. ಬಲ್ಲವರ ತಿಳಿವಾಗಿರುವ ಭಗವಂತ 'ಜ್ಞಾನಃ'.

ಮೂಲಭೂತವಾಗಿ ವಿಭೂತಿಗಳ ವಿಸ್ತಾರ ಇಲ್ಲಿಗೆ ಮುಗಿಯಿತು. ಮುಂದೆ ವಿಭೂತಿಯ ಉಪಸಂಹಾರವನ್ನು ಈ ಅಧ್ಯಾಯದ ಉಳಿದ ಭಾಗದಲ್ಲಿ ನೋಡೋಣ.

ಯಚ್ಚಾಪಿ ಸರ್ವಭೂತಾನಾಂ ಬೀಜಂ ತದಹಮರ್ಜುನ ।
ನ ತದಸ್ತಿ ವಿನಾ ಯತ್ ಸ್ಯಾನ್ಮಯಾ ಭೂತಂ ಚರಾಚರಮ್ ॥೩೯॥

ಯತ್ ಚ ಅಪಿ ಸರ್ವ ಭೂತಾನಾಮ್ ಬೀಜಮ್ ತತ್ ಅಹಮ್ ಅರ್ಜುನ ।
ನ ತತ್ ಅಸ್ತಿ ವಿನಾ ಯತ್ ಸ್ಯಾತ್ ಮಯಾ ಭೂತಮ್ ಚರ ಅಚರಮ್ -ಅರ್ಜುನಾ, ಸಮಸ್ತ ಜೀವಿಗಳಲ್ಲಿ ಏನೆಲ್ಲಾ ವಿಶಿಷ್ಟ ಗುಣವಿದೆಯೋ ಅವುಗಳಲ್ಲಿ ನಾನೇ ಇದ್ದು ಆ ಶಕ್ತಿ ನೀಡಿದ್ದೇನೆ. ನನ್ನನ್ನು ಹೊರತುಪಡಿಸಿ ಈ ಚರಾಚರದಲ್ಲಿ ಯಾವುದೂ ತಾನೇ ತಾನಾಗಿ ಇಲ್ಲ.

"ಈ ಜಗತ್ತಿನಲ್ಲಿರುವ ಸಮಸ್ತ ವಸ್ತು(ಜಡ-ಚೇತನ)ವಿಗೂ ಮೂಲಭೂತವಾಗಿರುವ ಅಭಿವ್ಯಂಜಕ ರೂಪ ಮತ್ತು ಶಕ್ತಿ ಕೊಡುವವನು ನಾನು" ಎನ್ನುತ್ತಾನೆ ಕೃಷ್ಣ. ಹೀಗೆ ಭಗವಂತ ಸಮಸ್ತ ಸೃಷ್ಟಿಗೂ ಬೀಜಪುರುಷನಾಗಿ ನಿಂತಿದ್ದಾನೆ. ಕಣ್ಣಿಗೆ ಕಾಣದ ಜೀವಕ್ಕೆ ಕಣ್ಣಿಗೆ ಕಾಣುವ ಶರೀರ ಕೊಡುವವನು ಆತ. ಗಂಡಿನ ರೇತಸ್ಸಿನಲ್ಲಿದ್ದು, ಜೀವವನ್ನು ರೇತಸ್ಸಿನ ಮುಖೇನ ಹೆಣ್ಣಿನ ದೇಹದೊಳಗೆ ಸೇರಿಸಿ, ಅಲ್ಲಿ ಜೀವಕ್ಕೆ ಒಂದು ರೂಪವನ್ನು ಕೊಟ್ಟು ಬೆಳಗಿಸುವವ ಭಗವಂತ. ಹೀಗೆ ಈ ಪ್ರಪಂಚದಲ್ಲಿರುವ ಚೇತನಾಚೇತನ ಅಥವಾ ಚರಾಚರಾತ್ಮಕ-ಎಲ್ಲವನ್ನೂ ಹುಟ್ಟಿಸುವವನು ಭಗವಂತ. "ಈ ಪ್ರಪಂಚದಲ್ಲಿ ನನ್ನನ್ನು ತೊರೆದು ಸ್ವತಂತ್ರವಾಗಿ ಯಾವ ವಸ್ತುವೂ ಇಲ್ಲ" ಎನ್ನುತ್ತಾನೆ ಕೃಷ್ಣ. ಇದು ವೈದಿಕ ಪರಂಪರೆಯಲ್ಲಿ ಇರುವ ಗೊಂದಲಕ್ಕೆ ಕೃಷ್ಣ ಕೊಟ್ಟ ನೇರ ಉತ್ತರ. ಜೀವ ಮತ್ತು ಭಗವಂತ ಒಂದೇ ಅಲ್ಲ. ಜೀವ ಭಗವಂತನ ಪ್ರತಿಬಿಂಬ. ಎಲ್ಲವೂ ಇದೆ. ಆದರೆ ಭಗವಂತನನ್ನು ಬಿಟ್ಟು ಸ್ವತಂತ್ರ ಅಸ್ತಿತ್ವ ಯಾರಿಗೂ ಇಲ್ಲ.

ನಾಂತೋಽಸ್ತಿ ಮಮ ದಿವ್ಯಾನಾಂ ವಿಭೂತೀನಾಂ ಪರಂತಪ ।
ಏಷ ತೂದ್ದೇಶತಃ ಪ್ರೋಕ್ತೋ ವಿಭೂತೇರ್ವಿಸ್ತರೋ ಮಯಾ ॥೪೦॥

ನ ಅಂತಃ ಅಸ್ತಿ ಮಮ ದಿವ್ಯಾನಾಮ್ ವಿಭೂತೀನಾಮ್ ಪರಂತಪ ।
ಏಷಃ ತು ಉದ್ದೇಶತಃ ಪ್ರೋಕ್ತಃ ವಿಭೂತೇಃ ವಿಸ್ತರಃ ಮಯಾ–ಓ ಪರಂತಪಾ, ನನ್ನ ದಿವ್ಯರೂಪಗಳ ಹಿರಿಮೆಗಳಿಗೆ ಕೊನೆಯಿಲ್ಲ. ನನ್ನ ಹಿರಿಮೆಯ ಬಿತ್ತರದ ಕೆಲವನ್ನಷ್ಟೇ ಇಲ್ಲಿ ಹೆಸರಿಸಿ ಹೇಳಿದೆ.

ಕೃಷ್ಣ ಹೇಳುತ್ತಾನೆ: "ನನ್ನ ವಿಭೂತಿ ಪ್ರಪಂಚದಲ್ಲಿರುವ ಪ್ರತಿಯೊಂದು ವಸ್ತುವಿನಲ್ಲೂ ಇದೆ. ಅದನ್ನು ಹೇಳಿ ಕೊನೆ ಇಲ್ಲ" ಎಂದು. ಲೋಕವಿಲಕ್ಷಣವಾದ ಭಗವಂತನ ವಿಭೂತಿಗೆ ಕೊನೆ ಇಲ್ಲ. ಅದನ್ನು ಹೇಳಿ ಮುಗಿಯುವುದಿಲ್ಲ. ಇಲ್ಲಿ ಕೃಷ್ಣ ಅತ್ಯಂತ ಮುಖ್ಯವಾದ, ನಾವು ನಿರಂತರ ಉಪಾಸನೆ ಮಾಡಬೇಕಾದ, ನಿತ್ಯ ಅನುಸಂಧಾನದಲ್ಲಿರಬೇಕಾದುದ್ದನ್ನು ಹೇಳಿದ್ದಾನೆ ಅಷ್ಟೆ.

ಯದ್ಯದ್ ವಿಭೂತಿಮತ್ ಸತ್ತ್ವಂ ಶ್ರೀಮದೂರ್ಜಿತಮೇವ ವಾ ।
ತತ್ತದೇವಾವಗಚ್ಛ ತ್ವಂ ಮಮ ತೇಜೋಽಂಶಸಂಭವಮ್ ॥೪೧॥

ಯತ್ ಯತ್ ವಿಭೂತಿ ಮತ್ ಸತ್ತ್ವಮ್ ಶ್ರೀಮತ್ ಊರ್ಜಿತಮ್ ಏವ ವಾ ।
ತತ್ ತತ್ ಏವ ಅವಗಚ್ಛ ತ್ವಮ್ ಮಮ ತೇಜಃ ಅಂಶ ಸಂಭವಮ್–ಗುಂಪಿನಲ್ಲಿ ಮಿಗಿಲಾದದ್ದು , ಸಿರಿಯಲ್ಲಿ ಹಿರಿದಾದದ್ದು. ಎತ್ತರದಲ್ಲಿ ಮೆರೆದದ್ದು ಯಾವುದೆಲ್ಲಾ ಇದೆಯೋ ಅದೆಲ್ಲವೂ ನನ್ನ ಹಿರಿಮೆಯ ಬೆಳಕಿನ ಕಿಡಿಯಿಂದ ಮೂಡಿಬಂದದ್ದು ಎಂದು ತಿಳಿ.

ಒಟ್ಟಿನಲ್ಲಿ ಒಬ್ಬ ವ್ಯಕ್ತಿಯಲ್ಲಿ, ಒಂದು ವಸ್ತುವಿನಲ್ಲಿ, ಇನ್ನೊಬ್ಬರಲ್ಲಿಲ್ಲದ ಯಾವ ವಿಶಿಷ್ಟ ಗುಣವಿದೆಯೋ ಅದು ಭಗವಂತನ ಹಿರಿಮೆಯ ಒಂದು ಬೆಳಕಿನ ಕಿಡಿ. ಇದು ಭಗವಂತನ ಅನಂತ ತೇಜಸ್ಸಿನ ಒಂದು ತುಣುಕು.

ಅಥವಾ ಬಹುನೈತೇನ ಕಿಂ ಜ್ಞಾತೇನ ತವಾರ್ಜುನ ।
ವಿಷ್ಟಭ್ಯಾಹಮಿದಂ ಕೃತ್ಸ್ನಮೇಕಾಂಶೇನ ಸ್ಥಿತೋ ಜಗತ್ ॥೪೨॥

ಅಥವಾ ಬಹುನಾ ಏತೇನ ಕಿಮ್ ಜ್ಞಾತೇನ ತವ ಅರ್ಜುನ ।
ವಿಷ್ಟಭ್ಯ ಅಹಮ್ ಇದಮ್ ಕೃತ್ಸ್ನಮ್ ಏಕ ಅಂಶೇನ ಸ್ಥಿತಃ ಜಗತ್ -ಅಥವಾ, ಓ ಅರ್ಜುನಾ, ಎಲ್ಲವನ್ನು ತಿಳಿದು ಏನು ಬಂತು ? ಸಾರವಿದು: ನಾನು ನನ್ನ ಒಂದೇ ಅಂಶದಿಂದ ಈ ಇಡಿಯ ವಿಶ್ವವನ್ನು ತಬ್ಬಿ ತಡೆಹಿಡಿದು ನಡೆಸುತ್ತಿದ್ದೇನೆ.

ಒಂದೊಂದನ್ನು ಪ್ರತ್ಯೇಕ ತಿಳಿದು ಹೇಳುವುದು ಅಸಾಧ್ಯ. ಈ ರೀತಿ ಮಾಡುವ ಅಗತ್ಯವೂ ಇಲ್ಲ. ಎಲ್ಲವುದರೊಳಗೂ ಒಂದು ವಿಶಿಷ್ಟ ಶಕ್ತಿಯಾಗಿ ಭಗವಂತನಿದ್ದಾನೆ. ಎಲ್ಲದರಲ್ಲೂ ಭಗವಂತನ ವಿಭೂತಿ ಅಡಗಿದೆ. ಕೃಷ್ಣ ಹೇಳುತ್ತಾನೆ " ಇಡೀ ವಿಶ್ವವನ್ನು ನಾನು ನನ್ನ ಸಾಮರ್ಥ್ಯದ ಒಂದು ತುಣುಕಿನಿಂದ ವ್ಯಾಪಿಸಿ ನಿಂತಿದ್ದೇನೆ" ಎಂದು. ಪುರುಷ ಸೂಕ್ತದಲ್ಲಿ ಹೇಳುವಂತೆ:

ಪಾದೋಽಸ್ಯ ವಿಶ್ವಾ ಭೂತಾನಿ| ತ್ರಿಪಾದಸ್ಯಾಮೃತಂ ದಿವಿ|
ತ್ರಿಪಾದೂರ್ಧ್ವ ಉದೈತ್ಪುರುಷಃ| ಪಾದೋಽಸ್ಯೇಹಾಭವಾತ್ಪುನಃ|
ತತೋ ವಿಷ್ವಂವ್ಯಕ್ರಾಮತ್| ಸಾಶನಾನಶನೇ ಅಭಿ|

**ಈ ಪ್ರಪಂಚದಲ್ಲಿ ವ್ಯಾಪಿಸಿರುವುದು ಭಗವಂತನ ಕೇವಲ ಕಾಲು ಭಾಗವಷ್ಟೆ. ಅಮೃತಮಯವಾದ ಮುಕ್ಕಾಲು ಭಾಗ ದಿವ್ಯಲೋಕ (ಮುಕ್ತಲೋಕ) ದಲ್ಲಿ ನೆಲೆಸಿದೆ. "ಜಗತ್ತಿನ ಸಮಸ್ತ ವಸ್ತುವಿನ ಒಳಗೂ ಹೊರಗೂ ತುಂಬಿ ನಾನು ವಿಶ್ವ ರೂಪನಾಗಿದ್ದೇನೆ" ಎಂದು ಕೃಷ್ಣ ಹೇಳಿದ ಎನ್ನುವಲ್ಲಿಗೆ ಭಗವಂತನ ವಿಭೂತಿ ಎನ್ನುವ ಈ ಅಧ್ಯಾಯ ಮುಗಿಯಿತು.**

**ಇತಿ ದಶಮೋಽಧ್ಯಾಯಃ**

**ಹತ್ತನೆಯ ಅಧ್ಯಾಯ ಮುಗಿಯಿತು**



# ಅಧ್ಯಾಯ ಹನ್ನೊಂದು

ಈ ಅಧ್ಯಾಯ ಭಗವಂತನ ಉಪಾಸನೆ ಮಾಡುವಾಗ ಆತನನ್ನು ಹೇಗೆ ಚಿಂತನೆ ಮಾಡಬೇಕು ಎಂದು ಹೇಳುವ ಅಧ್ಯಾಯ. ಇದು ಭಗವಂತನ ವಿಶ್ವರೂಪ ದರ್ಶನ ಅಧ್ಯಾಯ. ಕೃಷ್ಣ ಅರ್ಜುನನಿಗೆ ದಿವ್ಯನೇತ್ರವನ್ನು ಕರುಣಿಸಿ ತನ್ನ ವಿಶ್ವರೂಪ ದರ್ಶನ ಮಾಡಿಸುತ್ತಾನೆ. ಆ ವಿಶ್ವರೂಪದ ವರ್ಣನೆ ಇಲ್ಲಿದೆ. ಇಲ್ಲಿ ಸರ್ವವ್ಯಾಪ್ತ, ಸರ್ವಾಂತರ್ಯಾಮಿ, ಸರ್ವಸಮರ್ಥ ಭಗವಂತನ ಚಿಂತನೆ ಹೇಗೆ ಮಾಡಬೇಕು ಎನ್ನುವ ಮಾರ್ಗದರ್ಶನವಿದೆ. ಭಗವಂತನ ರೂಪವನ್ನು ಯಾವುದೋ ಒಂದು ಲೌಕಿಕ ಅನುಭವದೊಂದಿಗೆ ಸಮೀಕರಿಸಲು ಸಾಧ್ಯವಿಲ್ಲ. ಅದು ಲೋಕಾತೀತ ಅನುಭವ. ಆ ಅದ್ಭುತ ಅನುಭವದ ಚಿತ್ರಣ ಈ ಅಧ್ಯಾಯ.

ಭಗವಂತನ ಸರ್ವಗತವಾದ ವಿಶ್ವರೂಪವನ್ನು ಎಲ್ಲರೂ ಧ್ಯಾನ ಮಾಡಲು ಸಾಧ್ಯವಿಲ್ಲ. ಆದರೆ ಎಲ್ಲಾ ಕಡೆ ತುಂಬಿರುವ ಭಗವಂತನ ಕಿಂಚಿತ್ ದರ್ಶನ ಪ್ರತಿಯೊಬ್ಬರೂ ಧ್ಯಾನ ಯೋಗದಲ್ಲಿ ಪಡೆಯಲು ಸಾಧ್ಯವಿದೆ. ಹೇಗೆ ಅರ್ಜುನನಿಗೆ ಕೃಷ್ಣ ತನ್ನ ವಿಶ್ವರೂಪವನ್ನು ತೋರಿಸಿದನೋ ಹಾಗೆ ನಮಗೆ ಧ್ಯಾನದಲ್ಲಿ ಕೂಡಾ ತನ್ನ ರೂಪವನ್ನು ಆತನೇ ತೋರಿಸಬೇಕು. ಇದು ಹೊರಪ್ರಪಂಚದಲ್ಲಿ ಕಾಣುವ ರೂಪವಲ್ಲ. ನಾವು ನಮ್ಮ ಒಳಗಣ್ಣನ್ನು ತೆರೆದು ಕುಳಿತು ಧ್ಯಾನ ಮಾಡಬೇಕು, ಭಗವಂತನಲ್ಲಿ ಶರಣಾಗಬೇಕು. ಕಾತರತೆಯಿಂದ ಕರೆದಾಗ ಒಳಗಿನಿಂದ ಏನು ಅನುಭೂತಿ ಬರುತ್ತದೋ ಅದು ಲೌಕಿಕ ಅನುಭೂತಿಯನ್ನು ಮೀರಿದ ವಿಚಾರ.

ಈ ಅಧ್ಯಾಯದಲ್ಲಿ ಭಗವಂತನ ಮಾತು ಕಡಿಮೆ. ಇಲ್ಲಿ ಕೃಷ್ಣನ ವಿಶ್ವರೂಪವನ್ನು ಕಂಡವರ ಮಾತಿದೆ. ಅವರು ಕಂಡ ರೀತಿಯನ್ನು ಕೇಳಿ ನಾವು ಭಗವಂತನನ್ನು ಕಾಣಲು ಪ್ರಯತ್ನ ಮಾಡಬೇಕು. ಇದು ನಮ್ಮ ಅಂತರಂಗದ ಅಧ್ಯಾತ್ಮದ ಸಾಕ್ಷಾತ್ಕಾರಕ್ಕೆ ಪೂರಕವಾದ, ಧ್ಯಾನದ ದಾರಿಯಲ್ಲಿ ನಮ್ಮನ್ನು ಕೊಂಡೊಯ್ಯುವ ಬಹಳ ಮಹತ್ವದ ಅಧ್ಯಾಯ. ಬನ್ನಿ, ವ್ಯಾಸರು ದಾಖಲಿಸಿದ ಭಗವಂತನ ಅಪೂರ್ವ ವಿಶ್ವರೂಪ ವರ್ಣನೆಯನ್ನು ಕೇಳಿ ಧನ್ಯರಾಗೋಣ.

ಅಧ್ಯಾಯಕ್ಕೆ ಪ್ರವೇಶಿಸುವ ಮುನ್ನ ನಾವು ಒಂದು ವಿಚಾರವನ್ನು ತಿಳಿದುಕೊಳ್ಳಬೇಕು. ನಮ್ಮಲ್ಲಿ ಕೆಲವರಿಗೆ ಒಂದು ತಪ್ಪು ತಿಳುವಳಿಕೆ ಇದೆ. "ಅರ್ಜುನನಿಗೆ ಭಗವಂತನ ಸಂದೇಶವನ್ನು ಮನವರಿಕೆ ಮಾಡಿಸಲು ಕೃಷ್ಣ ತನ್ನ ವಿಶ್ವರೂಪ ದರ್ಶನ ಮಾಡಿಸಬೇಕಾಯಿತು" ಎಂದು. "ಸ್ವತಃ ಶ್ರೀಕೃಷ್ಣನಿಂದಲೇ ಉಪದೇಶ ಪಡೆದರೂ ಸಹ ಅರ್ಜುನನಿಗೆ ಮನವರಿಕೆ ಆಗಲಿಲ್ಲ, ಇನ್ನು ನಮ್ಮ ಪಾಡೇನು? ನಮಗೆ ಯಾರು ವಿಶ್ವರೂಪ ದರ್ಶನ ಮಾಡಿಸುತ್ತಾರೆ"-ಎಂದು ಯೋಚಿಸುವವರಿದ್ದಾರೆ. ಆದರೆ ಇದು ನಮ್ಮ ತಪ್ಪು ತಿಳುವಳಿಕೆ. ಅರ್ಜುನನಿಗೆ ಭಗವಂತನ ಸಂದೇಶ ಪೂರ್ಣ ಮನವರಿಕೆ ಆಗಿತ್ತು. ಈ ವಿಚಾರ ಈ ಅಧ್ಯಾಯದ ಮೊದಲ ಶ್ಲೋಕದಲ್ಲೇ ತಿಳಿಯುತ್ತದೆ. ಅರ್ಜುನ ಹೇಳುತ್ತಾನೆ "ಮೋಹೋಽಯಂ ವಿಗತೋ ಮಮ"- 'ನಿನ್ನ ಮಹಿಮೆ ತಿಳಿದು ನನ್ನ ಎಲ್ಲಾ ಸಂಶಯವೂ ಕಳೆಯಿತು' ಎಂದು. ಇದರಿಂದ ತಿಳಿಯುವುದೇನೆಂದರೆ ಅರ್ಜುನ ಭಗವಂತನ ವಿಶ್ವರೂಪ ದರ್ಶನ ಬಯಸಿದ್ದು ಕೇವಲ ನೋಡಿ ಧನ್ಯನಾಗುವುದಕ್ಕೋಸ್ಕರವೇ ಹೊರತು, ಪುರಾವೆಗಾಗಿ ಅಲ್ಲ. ಸಾಮಾನ್ಯವಾಗಿ ಮನುಷ್ಯ ಸ್ವಭಾವವೇನೆಂದರೆ ಒಂದು ವಿಷಯವನ್ನು ಕೇಳಿದ ಮೇಲೆ ಅದನ್ನೊಮ್ಮೆ ನೋಡಬೇಕು ಎನ್ನುವ ಸಹಜ ಅಭಿಲಾಷೆ. ಅರ್ಜುನ ಕೃಷ್ಣನ ಮುಂದಿಟ್ಟಿರುವುದು ಕೂಡಾ ಇಂತಹದ್ದೇ ಬಯಕೆಯನ್ನು. ಮುಂದಿನ ನಾಲ್ಕು ಶ್ಲೋಕಗಳಲ್ಲಿ ಈ ವಿಚಾರ ಸ್ಪಷ್ಟವಾಗಿ ತಿಳಿಯುತ್ತದೆ.

ಅರ್ಜುನ ಉವಾಚ ।
ಮದನುಗ್ರಹಾಯ ಪರಮಂ ಗುಹ್ಯಮಧ್ಯಾತ್ಮಸಂಜ್ಞಿತಮ್।
ಯತ್ ತ್ವಯೋಕ್ತಂ ವಚಸ್ತೇನ ಮೋಹೋಽಯಂ ವಿಗತೋ ಮಮ ॥೧॥

ಅರ್ಜುನಃ ಉವಾಚ- ಅರ್ಜುನ ಹೇಳಿದನು:
ಮತ್ ಅನುಗ್ರಹಾಯ ಪರಮಮ್ ಗುಹ್ಯಮ್ ಅಧ್ಯಾತ್ಮ ಸಂಜ್ಞಿತಮ್।
ಯತ್ ತ್ವಯಾ ಉಕ್ತಮ್ ವಚಃ ತೇನ ಮೋಹಃ ಅಯಮ್ ವಿಗತಃ ಮಮ -- ನನ್ನ ಮೇಲೆ ದಯೆದೋರಲೆಂದು, ಅಧ್ಯಾತ್ಮವೆಂಬ ಹಿರಿಯ ಗುಟ್ಟನ್ನು ನೀನು ನುಡಿದೆ. ಆ ನುಡಿಯಿಂದ ನನ್ನೀ ಮಂಕು ಕಳೆಯಿತು.

ಅರ್ಜುನ ಹೇಳುತ್ತಾನೆ: "ನನ್ನ ಮೇಲಿನ ಅನುಗ್ರಹದಿಂದ ಅಧ್ಯಾತ್ಮದ ಪರಮ ಗುಹ್ಯವಾದ ವಿಚಾರವನ್ನು ನನಗೆ ಹೇಳಿದಿ" ಎಂದು. ಇಲ್ಲಿ 'ಅನುಗ್ರಹ' ಎಂದರೆ-ತಮ್ಮಿಂದ ಚಿಕ್ಕವರನ್ನು ಸರಿದಾರಿಯಲ್ಲಿ ತಂದು, ಎತ್ತರಕ್ಕೇರಿಸಿ ಉದ್ಧಾರ ಮಾಡಬೇಕು ಎಂಬ ಹಿರಿಯರ ಇಚ್ಛೆ. "ದಾರಿ ತಪ್ಪಿ ನಡೆಯಲಿದ್ದ ನನ್ನನ್ನು ಸರಿದಾರಿಗೆ ತಂದು ಉದ್ಧಾರ ಮಾಡಿದಿ" ಎನ್ನುವ ಭಾವವನ್ನು ಅರ್ಜುನ ವ್ಯಕ್ತಪಡಿಸಿದ್ದಾನೆ. ಇಲ್ಲಿ 'ಮತ್' ಎನ್ನುವ ಪದ ಬಳಕೆಯಾಗಿದೆ. 'ಮತ್' ಎಂದರೆ ಕೇವಲ 'ನನ್ನ ಅಥವಾ ನನಗೆ' ಅನ್ನುವ ಅರ್ಥವಷ್ಟೇ ಅಲ್ಲ. 'ಮತ್' ಎನ್ನುವುದು ಯತ್ ಇದ್ದಂತೆ. 'ಮಾತೀತಿ ಮತ್'-ಅಂದರೆ 'ಸಮಸ್ತ ಜ್ಞಾನಿಗಳು' ಅನ್ನುವ ಅರ್ಥವನ್ನು ಕೊಡುತ್ತದೆ. ಆದ್ದರಿಂದ ಮದನುಗ್ರಹ ಅಂದರೆ 'ಸಮಸ್ತ ಜ್ಞಾನಿಗಳ ಉದ್ಧಾರಕ್ಕೋಸ್ಕರ' ಎಂದರ್ಥ. ಭಗವಂತ ಸಮಸ್ತ ಮನುಕುಲಕ್ಕೆ ಈ ಅಪೂರ್ವ ಸಂದೇಶವನ್ನು ತಲುಪಿಸಲು ಗೀತೆಯನ್ನು ಅರ್ಜುನನಿಗೆ ಉಪದೇಶ ಮಾಡಿ, ಅದನ್ನು ತಾನೇ ವ್ಯಾಸರೂಪನಾಗಿ ದಾಖಲಿಸಿ ನಮಗೆ ಕೊಟ್ಟನೇ ಹೊರತು, ಕೇವಲ ಅರ್ಜುನನಿಗೋಸ್ಕರ ಹೇಳಿದ್ದಲ್ಲ.

ಈ ಪ್ರಪಂಚದಲ್ಲಿ ಅತ್ಯಂತ ಗೋಪ್ಯವಾಗಿರಬೇಕಾದ ವಿದ್ಯೆ-ಅಧ್ಯಾತ್ಮ ವಿದ್ಯೆ. ಯಾವಾಗಲೂ ಅಪೂರ್ವ ವಿಷಯವನ್ನು ಗೋಪ್ಯವಾಗಿಡುತ್ತಾರೆ. ಏಕೆಂದರೆ ಅದು ದುರುಪಯೋಗವಾಗಬಾರದು ಮತ್ತು ಅದರ ಮಹತ್ವ ತಿಳಿಯದವರಿಗೆ ತಲುಪಬಾರದು. ಅಧ್ಯಾತ್ಮ-ಮನೋವಿಜ್ಞಾನ, ಜೀವವಿಜ್ಞಾನ ಮತ್ತು ಪರಮಾತ್ಮವಿಜ್ಞಾನ. ಇಂತಹ ಅಪೂರ್ವ ವಿದ್ಯೆಯನ್ನು ಕೃಷ್ಣ ಅರ್ಜುನನ ಮುಂದೆ ತೆರೆದಿಟ್ಟಿರುವುದಕ್ಕೆ ಅರ್ಜುನ ಭಗವಂತನನ್ನು ಕೊಂಡಾಡುತ್ತಾನೆ ಮತ್ತು ಹೇಳುತ್ತಾನೆ: "ಇದರಿಂದ ನನ್ನೆಲ್ಲಾ ಮಾನಸಿಕ ಗೊಂದಲ ಹೊರಟು ಹೋಗಿ ಮೋಹ ಕಳೆಯಿತು" ಎಂದು.

ಭವಾಪ್ಯಯೌ ಹಿ ಭೂತಾನಾಂ ಶ್ರುತೌ ವಿಸ್ತರಶೋ ಮಯಾ ।
ತ್ವತ್ತಃ ಕಮಲಪತ್ರಾಕ್ಷ ಮಾಹಾತ್ಮ್ಯಮಪಿ ಚಾವ್ಯಯಮ್ ॥೨॥

ಭವ ಅಪ್ಯಯೌ ಹಿ ಭೂತಾನಾಮ್ ಶ್ರುತೌ ವಿಸ್ತರಶಃ ಮಯಾ ।
ತ್ವತ್ತಃ ಕಮಲಪತ್ರ ಅಕ್ಷ ಮಾಹಾತ್ಮ್ಯಮ್ ಅಪಿ ಚ ಅವ್ಯಯಮ್ -- ಜೀವಿಗಳ ಹುಟ್ಟು ಸಾವುಗಳ ಬಿತ್ತರವನ್ನು ನಾನು ನಿನ್ನಿಂದ ಕೇಳಿದೆ; ಓ ತಾವರೆ ಎಸಳಂಥ ಕಣ್ಣಳವನೇ, ನಿನ್ನ ಅಳಿವಿರದ ಮಹಿಮೆಯನ್ನು ಕೂಡಾ.

"ಜೀವಿಗಳ ಭವ ಮತ್ತು ಅಪ್ಯಯಗಳ ಬಿತ್ತರವನ್ನು ನಾನು ನಿನ್ನಿಂದ ಕೇಳಿದೆ" ಎನ್ನುತ್ತಾನೆ ಅರ್ಜುನ. ಇಲ್ಲಿ ಭವ ಮತ್ತು ಅಪ್ಯಯ ಎನ್ನುವುದಕ್ಕೆ ಹುಟ್ಟು-ಸಾವು, ಸೃಷ್ಟಿ-ಸಂಹಾರ ಎನ್ನುವ ಅರ್ಥವಲ್ಲದೆ ಇನ್ನೊಂದು ಬಹಳ ರೋಚಕವಾದ ಅರ್ಥವಿದೆ. ವೇದಕಾಲದ ಋಷಿಗಳು ಇದನ್ನು ಒಂದು ಹೊಸ ಅರ್ಥದಲ್ಲಿ ಬಳಸುತ್ತಿದ್ದರು. "ಪ್ರಭವಾಪ್ಯಯೌ ಭೂತಾನಾಂ" ಎಂದು ಉಪನಿಷತ್ತಿನಲ್ಲಿ ಬರುತ್ತದೆ. ಸುಖಪ್ರಾಪ್ತಿ-ಭವ ಮತ್ತು ದುಃಖನಿವೃತ್ತಿ-ಅಪ್ಯಯ. ಇದು ಪ್ರಾಚೀನ ಋಷಿಗಳ ಅರ್ಥ. "ಯಾವ ರೀತಿಯ ನಡೆಯಿಂದ ಸುಖ ಪಡೆಯಬಹುದು, ಯಾವ ರೀತಿಯ ನಡೆಯಿಂದ ನಮ್ಮ ಬದುಕಿನ ದುಃಖದಿಂದ ಪಾರಾಗಬಹುದು ಎನ್ನುವ ಮೂಲ ಮಂತ್ರವನ್ನು ನಿನ್ನ ಬಾಯಿಯಿಂದಲೇ ಹೇಳಿದಿ-ಅದನ್ನು ನಾನು ಕಿವಿಯಾರೆ ಕೇಳಿದೆ" ಎನ್ನುತ್ತಾನೆ ಅರ್ಜುನ.
ಇಲ್ಲಿ 'ಕಮಲಪತ್ರಾಕ್ಷ' ಎನ್ನುವ ಒಂದು ವಿಶೇಷಣ ಬಳಸಿದ್ದಾರೆ. ಇದನ್ನು ಅರ್ಜುನ ಪ್ರಯೋಗ ಮಾಡುವುದರಲ್ಲಿ ಒಂದು ವಿಶೇಷವಿದೆ. "ನೀನು ನನ್ನ ಮೇಲೆ ಕಾರುಣ್ಯದ ರಸಧಾರೆಯನ್ನು ಹರಿಸಿದೆಯಲ್ಲಾ ಕೃಷ್ಣ" ಎನ್ನುವ ಭಾವ ಈ ವಿಶೇಷಣದ ಹಿಂದಿದೆ. "ನಿನ್ನ ಮಹಿಮೆ ಅವ್ಯಯ ಅನಂತವಾಗುಳಿಯುವ ಸಂಪತ್ತು. ಆ ಮಹತ್ತಾದ ಜ್ಞಾನವನ್ನು ನನಗೆ ಕೊಟ್ಟೆ. ಅತಿ ದುರ್ಲಭವಾದ ನಿನ್ನ ಮಹಿಮೆಯನ್ನು ನನಗೆ ಹೇಳಿದೆ" ಎನ್ನುತ್ತಾನೆ ಅರ್ಜುನ.

ಏವಮೇತದ್ ಯಥಾSSತ್ಥ ತ್ವಮಾತ್ಮಾನಂ ಪರಮೇಶ್ವರ ।
ದ್ರಷ್ಟುಮಿಚ್ಛಾಮಿ ತೇ ರೂಪಮೈಶ್ವರಂ ಪುರುಷೋತ್ತಮ ॥೩॥

ಏವಮ್ ಏತತ್ ಯಥಾ ಆತ್ಥ ತ್ವಮ್ ಆತ್ಮಾನಮ್ ಪರಮೇಶ್ವರ ।
ದ್ರಷ್ಟುಮ್ ಇಚ್ಛಾಮಿ ತೇ ರೂಪಮ್ ಐಶ್ವರಮ್ ಪುರುಷೋತ್ತಮ –ಪರಮೇಶ್ವರಾ, ನೀನು ನಿನ್ನ ಬಗೆಗೆ ಏನಂದೆಯೋ ಅದೆಲ್ಲಾ ನಿಜ. ಓ ಪುರುಷೋತ್ತಮಾ, ಜಗವನಾಳುವ ನಿನ್ನ ರೂಪವನ್ನು ಕಾಣುವ ತವಕ ನನಗೆ.

"ನೀನು ಹೇಳಿದ್ದರಲ್ಲಿ ನನಗೆ ಯಾವ ಸಂಶಯವೂ ಇಲ್ಲ" ಎನ್ನುತ್ತಾನೆ ಅರ್ಜುನ. ಇಲ್ಲಿ ಅರ್ಜುನ ಕೃಷ್ಣನನ್ನು 'ಪರಮೇಶ್ವರಃ' ಎಂದು ಸಂಬೋಧಿಸಿದ್ದಾನೆ. ಈಶ ಎಂದರೆ ಸಮರ್ಥ. ನಮ್ಮನ್ನು ನಿಯಂತ್ರಿಸುವ ದೇವತೆಗಳು ಈಶರು. ಅವರನ್ನು ನಿಯಂತ್ರಿಸುವ ಅಂತಃಕರಣ ಹಾಗೂ ಜೀವಕಲಾಭಿಮಾನಿ ದೇವತೆಗಳಾದ ಗರುಡ, ಶೇಷ ರುದ್ರ ಹಾಗೂ ಬ್ರಹ್ಮ ವಾಯು-ಈಶ್ವರರು. ಈ ತತ್ತ್ವಾಭಿಮಾನಿ ದೇವತೆಗಳ ನಿಯಾಮಕನಾದ, ಎಲ್ಲಕ್ಕಿಂತ ಎತ್ತರದಲ್ಲಿರುವ, ಎಲ್ಲರ ಒಡೆಯ ಭಗವಂತ ಪರಮೇಶ್ವರಃ. "ನೀನು ಹೇಳಿದ ವಿಚಾರದಲ್ಲಿ ನನಗೆ ಗೊಂದಲವಿಲ್ಲ. ಏಕೆಂದರೆ ನೀನು ಪರಮೇಶ್ವರಃ. ಆದರೆ ನನಗೆ ಆ ನಿನ್ನ ಸರ್ವಸಾಮರ್ಥ್ಯದಿಂದ ತುಂಬಿದ ರೂಪವನ್ನು ಕಾಣುವ ತವಕವಾಗುತ್ತಿದೆ" ಎಂದು 'ಭಗವಂತನ ಅದ್ಭುತ ರೂಪವನ್ನು ಕಾಣಬೇಕು' ಎನ್ನುವ ತನ್ನ ಬಯಕೆಯನ್ನು ಅರ್ಜುನ ಕೃಷ್ಣನ ಮುಂದಿಡುತ್ತಾನೆ.

ಇಲ್ಲಿ ಅರ್ಜುನ ಭಗವಂತನನ್ನು 'ಪುರುಷೋತ್ತಮಃ' ಎಂದು ಸಂಬೋಧಿಸಿದ್ದಾನೆ. ಈ ಪದಕ್ಕಿರುವ ವಿಶಿಷ್ಠ ಅರ್ಥವನ್ನು ಕೃಷ್ಣ ಅಧ್ಯಾಯ ಹದಿನೈದರಲ್ಲಿ(ಅ-೧೫, ಶ್ಲೋ-೧೬-೧೮) ವಿವರವಾಗಿ ವಿವರಿಸುತ್ತಾನೆ. ಲೋಕದಲ್ಲಿ ಎರಡು ಬಗೆಯ ಪುರುಷರಿದ್ದಾರೆ. ಕ್ಷರಪುರುಷ ಮತ್ತು ಅಕ್ಷರಪುರುಷ. ಬ್ರಹ್ಮಾದಿ ಸಮಸ್ತ ಜೀವರೂ ಕ್ಷರಪುರುಷರು. ಈ ಚರಾಚರದ ಕೂಟವನ್ನು ಕೂಡಿಸಿಟ್ಟ ಚಿತ್ ಪ್ರಕೃತಿಯೇ ಅಕ್ಷರ ಪುರುಷಳೆನಿಸಿದ್ದಾಳೆ-(ಅ-೧೫, ಶ್ಲೋ-೧೭); ಈ ಎರಡಕ್ಕೂ ಮಿಗಿಲಾದವನು ಪುರುಷೋತ್ತಮ. ಅವನನ್ನೇ ಪರಮಾತ್ಮ ಎನ್ನುತ್ತಾರೆ. ಅಳಿವಿರದ ಆ ಪರಮೇಶ್ವರನೇ ಮೂರು ಲೋಕದೊಳಗಿದ್ದು ಸಲಹುತ್ತಾನೆ (ಅ-೧೫, ಶ್ಲೋ-೧೭). ಕ್ಷರವನ್ನು ಮೀರಿ ನಿಂತವನು, ಅಕ್ಷರಕ್ಕಿಂತಲೂ ಹಿರಿಯನೂ ಆದ ಆ ನಾರಾಯಣ 'ಪುರುಷೋತ್ತಮ'.(ಅ-೧೫, ಶ್ಲೋ-೧೮). "ನಿನ್ನ ಪುರುಷೋತ್ತಮತ್ವದ ರೂಪವನ್ನು ನಾನು ಕಾಣಬೇಕು" ಎನ್ನುವ ಅಭಿಲಾಷೆಯನ್ನು ಅರ್ಜುನ ಕೃಷ್ಣನ ಮುಂದಿಟ್ಟ.

ಮನ್ಯಸೇ ಯದಿ ತಚ್ಛಕ್ಯಂ ಮಯಾ ದ್ರಷ್ಟುಮಿತಿ ಪ್ರಭೋ ।
ಯೋಗೇಶ್ವರ ತತೋ ಮೇ ತ್ವಂ ದರ್ಶಯಾಽತ್ಮಾನಮವ್ಯಯಮ್ ॥೪॥

ಮನ್ಯಸೇ ಯದಿ ತತ್ ಶಕ್ಯಮ್ ಮಯಾ ದ್ರಷ್ಟುಮ್ ಇತಿ ಪ್ರಭೋ ।
ಯೋಗೇಶ್ವರ ತತಃ ಮೇ ತ್ವಮ್ ದರ್ಶಯ ಆತ್ಮಾನಮ್ ಅವ್ಯಯಮ್ –ಜಗದೊಡೆಯನೇ, ಯೋಗಿಗಳೊಡೆಯನೇ, ಅದು ನನ್ನಿಂದ ಕಾಣಲು ಸಾಧ್ಯವೆಂದು ನೀನು ಭಾವಿಸುವುದಾದರೆ, ನಿನ್ನ ಅಳಿವಿರದ ರೂಪವನ್ನು ನನಗೆ ತೋರಿಸು.

ಅರ್ಜುನ ಮುಂದುವರಿದು ಹೇಳುತ್ತಾನೆ "ನಾನು ಆ ನಿನ್ನ ರೂಪವನ್ನು ನೋಡಲು ಸಾಧ್ಯ ಎಂದು ನೀನು ಭಾವಿಸುವುದಾದರೆ, ನಿನ್ನ ರೂಪವನ್ನು ನನಗೆ ತೋರಿಸು" ಎಂದು. ಇಲ್ಲಿ ಅರ್ಜುನ ಕೃಷ್ಣನನ್ನು 'ಪ್ರಭೋ' ಎಂದು ಸಂಬೋಧಿಸಿದ್ದಾನೆ. "ಪ್ರಭು' ಅಂದರೆ ಸಾಮರ್ಥ್ಯ. "ನೋಡುವ ಸಾಮರ್ಥ್ಯ ನನಗಿಲ್ಲದಿದ್ದರೂ, ಆ ಸಾಮರ್ಥ್ಯವನ್ನು ಕರುಣಿಸಿ ತೋರಿಸುವ ಸಾಮರ್ಥ್ಯ ನಿನಗಿದೆ" ಎನ್ನುವುದು ಈ ಸಂಬೋಧನೆಯ ಹಿಂದಿರುವ ಭಾವ. "ಏಕೆಂದರೆ ನೀನು ಯೋಗೇಶ್ವರಃ" ಎನ್ನುತ್ತಾನೆ ಅರ್ಜುನ. ಯೋಗ ಅಂದರೆ ಉಪಾಯ. "ನನಗೆ ಹೇಗೆ ನಿನ್ನ ರೂಪವನ್ನು ತೋರಿಸಬೇಕು ಎನ್ನುವ ಉಪಾಯ ಕೂಡಾ ನಿನಗೆ ತಿಳಿದಿದೆ. ನೀನು ಎಲ್ಲಾ ಉಪಾಯ(ಯೋಗ)ಗಳ ಸ್ವಾಮಿ. ಆದ್ದರಿಂದ ಅಳಿವಿರದ, ನಿತ್ಯವಾಗಿರುವ ಆ ನಿನ್ನ ರೂಪವನ್ನು ನನಗೆ ತೋರಿಸು" ಎಂದು ಅರ್ಜುನ ಕೃಷ್ಣನನ್ನು ಕೇಳಿಕೊಳ್ಳುತ್ತಾನೆ.

ಭಗವಾನುವಾಚ ।
ಪಶ್ಯ ಮೇ ಪಾರ್ಥ ರೂಪಾಣಿ ಶತಶೋಽಥ ಸಹಸ್ರಶಃ ।
ನಾನಾವಿಧಾನಿ ದಿವ್ಯಾನಿ ನಾನಾವರ್ಣಾಕೃತೀನಿ ಚ ॥೫॥

ಭಗವಾನ್ ಉವಾಚ-ಭಗವಂತ ಹೇಳಿದನು:

ಪಶ್ಯ ಮೇ ಪಾರ್ಥ ರೂಪಾಣಿ ಶತಶಃ ಅಥ ಸಹಸ್ರಶಃ ।

ನಾನಾವಿಧಾನಿ ದಿವ್ಯಾನಿ ನಾನಾ ವರ್ಣ ಆಕೃತೀನಿ ಚ –ನೋಡು ಪಾರ್ಥಾ, ನನ್ನ ರೂಪಗಳನ್ನು. ನೂರಾರು, ಸಾವಿರಾರು; ಬಗೆಬಗೆಯವು; ಹೊಳೆಯುವಂಥವು; ಹಲವು ಬಣ್ಣ-ಆಕಾರದವು.

ನಿನ್ನ ರೂಪವನ್ನು ತೋರು ಎಂದು ಅರ್ಜುನ ಏಕವಚನದಲ್ಲಿ ಕೇಳಿದರೆ ಕೃಷ್ಣ ಬಹುವಚನದಲ್ಲಿ ಹೇಳುತ್ತಾನೆ "ನೋಡು ನನ್ನ ರೂಪಗಳನ್ನು" ಎಂದು. ಭಗವಂತನ ಎಲ್ಲಾ ರೂಪಗಳೂ ಒಂದೇ. ಮೂಲ ರೂಪಕ್ಕೂ ಅವತಾರ ರೂಪಕ್ಕೂ ಭೇದವಿಲ್ಲ. "ನೀನು ಹಿಂದೆಂದೂ ಕಾಣದ ಅತ್ಯದ್ಭುತವಾದ ನನ್ನ ನೂರಾರು, ಸಾವಿರಾರು, ಬಗೆಬಗೆಯ, ಹೊಳೆಯುವಂತಹ, ಹಲವು ಬಣ್ಣ ಮತ್ತು ಆಕಾರದ ರೂಪಗಳನ್ನು ನೋಡು" ಎಂದು ಕೃಷ್ಣ ಅರ್ಜುನನಿಗೆ ಹೇಳುತ್ತಾನೆ. ಇಲ್ಲಿ ಕೃಷ್ಣ ಅರ್ಜುನನನ್ನು 'ಪಾರ್ಥ' ಎಂದು ಸಂಬೋಧಿಸಿದ್ದಾನೆ. ನಿಜವಾದ ವೇದಾರ್ಥ ತಿಳಿದು ವೇದಾರ್ಥಭೂತನಾದ ಭಗವಂತನೆಡೆಗೆ ಪಯಣ ಹೊರಟವರು 'ಪಾರ್ಥರು'.

ಪಶ್ಯಾಽದಿತ್ಯಾನ್ ವಸೂನ್ ರುದ್ರಾನಶ್ವಿನೌ ಮರುತಸ್ತಥಾ ।
ಬಹೂನ್ಯದೃಷ್ಟಪೂರ್ವಾಣಿ ಪಶ್ಯಾಽಶ್ಚರ್ಯಾಣಿ ಭಾರತ ॥೬॥

ಪಶ್ಯ ಆದಿತ್ಯಾನ್ ವಸೂನ್ ರುದ್ರಾನ್ ಅಶ್ವಿನೌ ಮರುತಃ ತಥಾ ।

ಬಹೂನಿ ಅದೃಷ್ಟ ಪೂರ್ವಾಣಿ ಪಶ್ಯ ಆಶ್ಚರ್ಯಾಣಿ ಭಾರತ -- ನೋಡು-ಆದಿತ್ಯರನ್ನು, ವಸುಗಳನ್ನು, ರುದ್ರರನ್ನು, ಅಶ್ವಿಗಳನ್ನು ಮತ್ತು ಮರುತ್ತುಗಳನ್ನು. ಓ ಭಾರತಾ, ನೋಡು ಹಿಂದೆಂದೂ ಕಂಡಿರದ ಹಲವು ಅಚ್ಚರಿಗಳನ್ನು.

"ಜಗತ್ತಿನಲ್ಲಿರುವ ಎಲ್ಲಾ ಆದಿತ್ಯರು(ದ್ವಾದಶಾದಿತ್ಯರು), ವಸುಗಳು (ಅಷ್ಟ ವಸುಗಳು), ರುದ್ರರು (ಏಕಾದಶ ರುದ್ರರು), ಅಶ್ವಿಗಳು(ಇಬ್ಬರು), ಮರುತ್ತುಗಳು(ನಲವತ್ತೊಂಬತ್ತು)-ಎಲ್ಲರನ್ನೂ ನೋಡು. ನೀನು ಹಿಂದೆಂದೂ ಕಂಡು ಕೇಳರಿಯದ ಅತ್ಯದ್ಭುತ ಅಚ್ಚರಿಯನ್ನು ನೋಡು" ಎನ್ನುತ್ತಾನೆ ಕೃಷ್ಣ. ಇಲ್ಲಿ ಕೃಷ್ಣ ಅರ್ಜುನನನ್ನು 'ಭಾರತ' ಎಂದು ಸಂಬೋಧಿಸಿದ್ದಾನೆ. ಐತರೇಯ ಬ್ರಾಹ್ಮಣದಲ್ಲಿ 'ವಾಯರ್ವಾವ ಭರತಃ' ಎನ್ನುವ ಒಂದು ಮಾತಿದೆ. ಸದಾ ಭಗವಂತನಲ್ಲಿ ನಿರತನಾದ ವಾಯು ದೇವರಿಗೆ ಭರತ ಎಂದು ಹೆಸರು. ಆದ್ದರಿಂದ ಇಲ್ಲಿ 'ಭಾರತ' ಎಂದರೆ 'ಭೀಮ(ಪ್ರಾಣತತ್ವ)ನ ತಮ್ಮ' ಎನ್ನುವ ಅರ್ಥವನ್ನು ಕೊಡುತ್ತದೆ. [ಸದಾ ಭಗವಂತನಿಗೆ ಅತೀ ಹತ್ತಿರವಿರುವ ಹನುಮಂತ ಅಥವಾ ಪ್ರಾಣತತ್ವದ ಉಪಾಸನೆ ಭಗವಂತನನ್ನು ತಿಳಿಯುವ ಸುಲಭ ಸಾಧನ.]

ಇಹೈಕಸ್ಥಂ ಜಗತ್ ಕೃತ್ಸ್ನಂ ಪಶ್ಯಾದ್ಯ ಸಚರಾಚರಮ್ ।
ಮಮ ದೇಹೇ ಗುಡಾಕೇಶ ಯಚ್ಚಾನ್ಯದ್ ದ್ರಷ್ಟುಮಿಚ್ಛಸಿ ॥೭॥

ಇಹ ಏಕ ಸ್ಥಮ್ ಜಗತ್ ಕೃತ್ಸ್ನಮ್ ಪಶ್ಯ ಅದ್ಯ ಸ ಚರ ಅಚರಮ್ ।
ಮಮ ದೇಹೇ ಗುಡಾಕೇಶ ಯತ್ ಚ ಅನ್ಯತ್ ದ್ರಷ್ಟುಮ್ ಇಚ್ಛಸಿ–ಇಲ್ಲಿ ನೋಡೀಗ, ನನ್ನ ಮೈಯಲ್ಲಿ ಚರಾಚರಗಳಿಂದ ಕೂಡಿದ ಇಡಿಯ ಜಗತ್ತು ಒಂದುಗೂಡಿದ್ದನ್ನು. ಓ ಗುಡಾಕೇಶಾ, ಇನ್ನೇನು ನೋಡ ಬಯಸುವೆಯೋ-ಅದನ್ನೆಲ್ಲಾ ನೋಡು.

"ನನ್ನ ದೇಹವನ್ನು ಆಶ್ರಯಿಸಿಕೊಂಡಿರುವ ಸಮಸ್ತ ವಿಶ್ವವನ್ನು ನೋಡು. ಬ್ರಹ್ಮಾಂಡದೊಳಗೆ ಏನೇನಿದೆಯೋ ಅದೆಲ್ಲವೂ ಇಲ್ಲಿದೆ. ಚೇತನ, ಅಚೇತನ, ಚಲಿಸುವ, ಚಲಿಸದ, ಎಲ್ಲವೂ. ನಿನಗೆ ಏನು ನೋಡಬೇಕು ಎಂದು ನಿನ್ನ ಮನಸ್ಸು ಬಯಸುತ್ತದೆಯೋ ಅದನ್ನು ನೋಡು" ಎನ್ನುತ್ತಾನೆ ಕೃಷ್ಣ. ಇಲ್ಲಿ ಕೃಷ್ಣ ಅರ್ಜುನನನ್ನು ಗುಡಾಕೇಶ ಎಂದು ಸಂಬೋಧಿಸುತ್ತಾನೆ. ಅಜ್ಞಾನ, ಆಲಸ್ಯ ಮತ್ತು ನಿದ್ದೆಯನ್ನು ಗೆದ್ದವ ಗುಡಾಕೇಶ.

ಇಲ್ಲಿ ಒಂದೊಂದು ಶ್ಲೋಕದಲ್ಲಿ ಒಂದೊಂದು ವಿಶೇಷಣ ಬಳಸಿದ್ದಾರೆ. ಈ ವಿಶೇಷಣದ ಹಿಂದೆ ಇರುವ ಅರ್ಥವನ್ನು ನೋಡಿದಾಗ ತಿಳಿಯುವುದೇನೆಂದರೆ -ನಮಗೆ ಭಗವಂತ ತಿಳಿಯಬೇಕಾದರೆ ನಾವೂ ಕೂಡಾ ಪಾರ್ಥ, ಭಾರತ, ಗುಡಾಕೇಶರಾಗಬೇಕು ಎನ್ನುವುದು. ವೇದಾರ್ಥ ತಿಳಿದು ವೇದಾರ್ಥಭೂತನಾದ ಭಗವಂತನೆಡೆಗೆ ಪಯಣ(ಪಾರ್ಥ), ಪ್ರಾಣತತ್ವದ ಉಪಾಸನೆ(ಭಾರತ), ಅಜ್ಞಾನ, ಆಲಸ್ಯ ಗೆದ್ದು ಭಗವಂತನ ಚಿಂತನೆ(ಗುಡಾಕೇಶ) ಮಾಡಿದಾಗ- ಆ ಭಗವಂತನ ರೂಪ ನಮಗೆ ತಿಳಿದೀತು.

ನತು ಮಾಂ ಶಕ್ಯಸೇ ದ್ರಷ್ಟುಮನೇನೈವ ಸ್ವಚಕ್ಷುಷಾ ।
ದಿವ್ಯಂ ದದಾಮಿ ತೇ ಚಕ್ಷುಃ ಪಶ್ಯ ಮೇ ಯೋಗಮೈಶ್ವರಮ್ ॥೮॥

ನ ತು ಮಾಮ್ ಶಕ್ಯಸೇ ದ್ರಷ್ಟುಮ್ ಅನೇನ ಏವ ಸ್ವ ಚಕ್ಷುಷಾ ।
ದಿವ್ಯಮ್ ದದಾಮಿ ತೇ ಚಕ್ಷುಃ ಪಶ್ಯ ಮೇ ಯೋಗಮ್ ಐಶ್ವರಮ್–ಆದರೆ ನಿನ್ನ ಈ ಹೊರಗಣ್ಣಿಂದಲೇ ನೋಡಲಾರೆ ನನ್ನನ್ನು. ನೀಡುತ್ತೇನೆ ನಿನಗೆ ದಿವ್ಯದ ಒಳಗಣ್ಣು. ನೋಡು ಜಗವನಾಳುವ ನನ್ನಳವನ್ನು.

ಭಗವಂತನ ರೂಪವನ್ನು ಈ ನಮ್ಮ ಹೊರಗಣ್ಣಿನಿಂದ ಕಾಣಲು ಸಾಧ್ಯವಿಲ್ಲ. ಸ್ವರೂಪಭೂತನಾದ ಆ ಭಗವಂತನನ್ನು ನಾವು ನಮ್ಮ ಸ್ವರೂಪಭೂತವಾದ ಕಣ್ಣಿನಿಂದ ಮಾತ್ರ ನೋಡಲು ಸಾಧ್ಯ. ಇಲ್ಲಿ ಕೃಷ್ಣ ಅರ್ಜುನನಿಗೆ ಆತನ ಸ್ವರೂಪಭೂತವಾದ ಕಣ್ಣಿನಿಂದ ಸರ್ವಸಮರ್ಥ ಭಗವಂತನನ್ನು ನೋಡುವ ಸೌಭಾಗ್ಯವನ್ನು ಕರುಣಿಸುತ್ತಾನೆ.

ಸಂಜಯ ಉವಾಚ ।
ಏವಮುಕ್ತ್ವಾ ತತೋ ರಾಜನ್ ಮಹಾಯೋಗೇಶ್ವರೋ ಹರಿಃ ।
ದರ್ಶಯಾಮಾಸ ಪಾರ್ಥಾಯ ಪರಮಂ ರೂಪಮೈಶ್ವರಮ್ ॥೯॥

ಸಂಜಯಃ ಉವಾಚ-ಸಂಜಯ ಹೇಳಿದನು:

ಏವಮ್ ಉಕ್ತ್ವಾ ತತಃ ರಾಜನ್ ಮಹಾಯೋಗೇಶ್ವರೋ ಹರಿಃ ।

ದರ್ಶಯಾಮ್ ಆಸ ಪಾರ್ಥಾಯ ಪರಮಮ್ ರೂಪಮ್ ಐಶ್ವರಮ್ –ಅರಸನೇ, ಹಿರಿಯ ಶಕ್ತಿಗಳ ಒಡೆಯನಾದ ಹರಿ ಹೀಗೆ ನುಡಿದು, ಅರ್ಜುನನಿಗೆ ತೋರಿಸಿದನು ಜಗವನಾಳುವ ಹಿರಿಯ ರೂಪವನ್ನು.

ವ್ಯಾಸರಿಂದ ದಿವ್ಯ ದೃಷ್ಟಿ ಪಡೆದು, ಯುದ್ಧರಂಗದಲ್ಲಿ ನಡೆಯುತ್ತಿರುವ ಘಟನೆಗಳ ವಿವರಣೆಯನ್ನು ಧೃತರಾಷ್ಟ್ರನಿಗೆ ಕೊಡುತ್ತಿರುವ ಸಂಜಯ ಕೂಡಾ ಭಗವಂತನ ವಿಶ್ವರೂಪವನ್ನು ಕಾಣುತ್ತಾನೆ. ಆತ ಧೃತರಾಷ್ಟ್ರನಲ್ಲಿ ಹೇಳುತ್ತಾನೆ: "ಓ ರಾಜನ್, ಈ ರೀತಿ ಹೇಳಿ ಮಹಾಯೋಗೇಶ್ವರ ಹರಿಯು ತನ್ನ ಹಿರಿಯರೂಪವನ್ನು ತೋರಿದನು" ಎಂದು. ಇಲ್ಲಿ ಬಳಕೆಯಾಗಿರುವ 'ತತಃ' ಅನ್ನುವ ಪದ ಈ ಶ್ಲೋಕದಲ್ಲಿ ವಿಶೇಷ ಅರ್ಥವನ್ನು ಕೊಡುತ್ತದೆ. ಅರ್ಜುನನು ದಿವ್ಯ ದೃಷ್ಟಿ ಸಂಪನ್ನನಾದ್ದರಿಂದ; ದಿವ್ಯರೂಪ ದರ್ಶನ ನೋಡುವ ಅಧಿಕಾರ ಸಂಪನ್ನನಾದ್ದರಿಂದ; ಎಲ್ಲಾ ಕಡೆ ತುಂಬಿರುವ ಭಗವಂತ, ತನ್ನ ವಿಶ್ವರೂಪವನ್ನು ಆತನಿಗೆ ತೋರಿದ-ಎನ್ನುವ ಭಾವವನ್ನು ಈ ಪದ ಕೊಡುತ್ತದೆ. ಬ್ರಹ್ಮಾದಿ ಸರ್ವ ದೇವತೆಗಳಿಗೂ ಒಡೆಯನಾದ ಭಗವಂತನನ್ನು ಸಂಜಯ ಇಲ್ಲಿ ಮಹಾಯೋಗೇಶ್ವರಃ ಎಂದು ಸಂಬೋಧಿಸಿದ್ದಾನೆ. ಇಲ್ಲಿ ಬಳಸಿರುವ 'ಹರಿಃ' ಎನ್ನುವ ಪದ ಭಗವಂತನ ಸರ್ವಗತತ್ವವನ್ನು ವಿವರಿಸುವ ಪದ. ಯಾರು ಯಾವ ದೇವತಾ ಮುಖದಲ್ಲಿ ಆಹುತಿ ಕೊಟ್ಟರೂ ಅದನ್ನು ಮೊದಲು ಪಡೆಯುವ ಭಗವಂತ ಹರಿಃ. ಮುಂದಿನ ಶ್ಲೋಕದಲ್ಲಿ ಸಂಜಯ ತಾನು ಕಂಡ ಭಗವಂತನ ವಿಶ್ವರೂಪದ ವರ್ಣನೆ ಮಾಡುತ್ತಾನೆ.

ಅನೇಕವಕ್ತ್ರನಯನಮನೇಕಾದ್ಭುತದರ್ಶನಮ್ ।
ಅನೇಕದಿವ್ಯಾಭರಣಂ ದಿವ್ಯಾನೇಕೋದ್ಯತಾಯುಧಮ್ ॥೧೦॥

ದಿವ್ಯಮಾಲ್ಯಾಂಬರಧರಂ ದಿವ್ಯಗಂಧಾನುಲೇಪನಮ್ ।
ಸರ್ವಾಶ್ಚರ್ಯಮಯಂ ದೇವಮನಂತಂ ವಿಶ್ವತೋಮುಖಮ್ ॥೧೧॥

ಅನೇಕ ವಕ್ತ್ರ ನಯನಮ್ ಅನೇಕ ಅದ್ಭುತ ದರ್ಶನಮ್ ।

ಅನೇಕ ದಿವ್ಯ ಆಭರಣಮ್ ದಿವ್ಯ ಅನೇಕ ಉದ್ಯತ ಆಯುಧಮ್ ॥

ದಿವ್ಯ ಮಾಲ್ಯಾ ಅಂಬರ ಧರಮ್ ದಿವ್ಯ ಗಂಧ ಅನುಲೇಪನಮ್ ।

ಸರ್ವ ಆಶ್ಚರ್ಯಮಯಮ್ ದೇವಮ್ ಅನಂತಮ್ ವಿಶ್ವತೋಮುಖಮ್ –ಎಣಿಕೆಯಿರದ ಬಾಯಿ ಕಣ್ಣುಗಳ ರೂಪ. ಎಣಿಕೆಯಿರದ ಅಚ್ಚರಿಯ ನೋಟಗಳ ರೂಪ. ಎಣಿಕೆಯಿರದ ಚೆಲುವಾಭರಣಗಳ ರೂಪ. ಎಣಿಕೆಯಿರದ ಹೊಳೆಯುವಾಯುಧಗಳನ್ನು ಮೇಲೆತ್ತಿ ಹಿಡಿದ ರೂಪ. ಹೊಳೆವ ಹೂದಂಡೆಗಳನ್ನಿಟ್ಟ ಉಡಿಗೆಗಳ ತೊಟ್ಟ ರೂಪ. ಹೊಳೆವ ಗಂಧ ಬಳಿದ ರೂಪ. ಎಲ್ಲಾ ಅಚ್ಚರಿಗಳ ಸೆಲೆ. ಎಲ್ಲೆಡೆಯೂ ತುಂಬಿ ತುದಿಯಿರದ ರೂಪ.

ಕೃಷ್ಣ ನಮ್ಮೆಲ್ಲರಂತೆ ಮನುಷ್ಯರ ಆಕಾರದಲ್ಲಿ ಕಾಣಿಸಿಕೊಳ್ಳುತ್ತಿದ್ದ. ಆದರೆ ಈ ಕ್ಷಣದಲ್ಲಿ ಎಲ್ಲಿ ನೋಡಿದರಲ್ಲಿ ಕೃಷ್ಣನ ಮುಖ, ಅಲ್ಲಿ ಸೇರಿರುವ ಪ್ರತಿಯೊಂದು ಜೀವಿಯ ಒಳಗೆ, ಹೊರಗೆ ಎಲ್ಲೆಲ್ಲೂ ಕೇವಲ ಕೃಷ್ಣನ ಮುಖ ಕಾಣುತ್ತಿದೆ. ಸಂಜಯನಿಗೆ ಅಲ್ಲಿ ಆನೆ, ಕುದುರೆ, ಸೈನಿಕರು ಕಾಣಿಸಲಿಲ್ಲ. ಬದಲಿಗೆ ಎಲ್ಲೆಡೆ, ಎಲ್ಲರೊಳಗೆ ತುಂಬಿರುವ ಆ ಭಗವಂತ ಕಾಣಿಸಿಕೊಂಡ. ಭಗವಂತನ ಈ ರೂಪವನ್ನು ವರ್ಣಿಸುವುದು ಅಸಾಧ್ಯ. ಇದನ್ನು ಕೇವಲ ನೋಡಿ ಅನುಭವಿಸಬೇಕು. ಅದೊಂದು ಅಚ್ಚರಿ. ಸರ್ವಾಭರಣಗಳಿಂದ ಶೋಭಿಸುವ, ದಿವ್ಯವಾದ ಆಯುಧಗಳನ್ನು ಹಿಡಿದಿರುವ, ಹೂವಿನ ಮಾಲೆಗಳನ್ನಿಟ್ಟ ಉಡುಪನ್ನು ತೊಟ್ಟ, ಹೊಳೆವ ಗಂಧ ಬಳಿದ, ಸರ್ವಾಶ್ಚರ್ಯ ಸ್ವರೂಪ, ವಿಸ್ಮಯ ಮೂರ್ತಿ ಭಗವಂತ ಯುದ್ಧರಂಗದಲ್ಲಿ ತನ್ನ ವಿಶ್ವರೂಪವನ್ನು ತೋರಿದ.

ದಿವಿ ಸೂರ್ಯಸಹಸ್ರಸ್ಯ ಭವೇದ್ ಯುಗಪದುತ್ಥಿತಾ ।
ಯದಿ ಭಾಃ ಸದೃಶೀ ಸಾ ಸ್ಯಾದ್ ಭಾಸಸ್ತಸ್ಯ ಮಹಾತ್ಮನಃ ॥೧೨॥

ದಿವಿ ಸೂರ್ಯ ಸಹಸ್ರಸ್ಯ ಭವೇತ್ ಯುಗಪತ್ ಉತ್ಥಿತಾ ।
ಯದಿ ಭಾಃ ಸದೃಶೀ ಸಾ ಸ್ಯಾತ್ ಭಾಸ ತಸ್ಯ ಮಹಾತ್ಮನಃ – ಸಾವಿರ ಸಾವಿರ ಸೂರ್ಯರು ಒಮ್ಮೆಲೇ ಮುಗಿಲಲ್ಲಿ ಮೂಡಿಬಂದರೆ, ಅಂತಹ ಬೆಳಕು ಆ ಮಹಾತ್ಮನ ಬೆಳಕಿಗೆ ಸರಿಗಟ್ಟಿತೇನೊ !

ಸಂಜಯ ಹೇಳುತ್ತಾನೆ: "ಸಾವಿರಾರು ಸೂರ್ಯರು ಆಕಾಶದಲ್ಲಿ ಒಮ್ಮೆಗೇ ಉದಿಸಿದರೆ ಎಷ್ಟು ಪ್ರಕಾಶಮಾನವಾಗಿರುತ್ತದೋ, ಅಂತಹ ಪ್ರಕಾಶಮಾನನಾಗಿ ಭಗವಂತ ಕಾಣಿಸಿದ" ಎಂದು. ಯೋಗಿಗಳಿಗೆ ಭಗವಂತ ಒಳಗಣ್ಣಿನಲ್ಲಿ ಸಾವಿರ ಸೂರ್ಯರು ಏಕಕಾಲದಲ್ಲಿ ಉದಯಿಸಿದರೆ ಎಷ್ಟು ಪ್ರಖರವಾಗಿರುತ್ತದೋ ಅಷ್ಟು ಪ್ರಖರವಾಗಿ ಕಾಣಿಸುತ್ತಾನೆ. ಆದರೆ 'ಚಂದ್ರಾಂಶು'ವಾದ ಭಗವಂತ ಅಷ್ಟೇ ತಂಪು ಮತ್ತು ಅಹ್ಲಾದಮಯ. ಭಗವಂತ ಸೂರ್ಯನಂತೆ ಪ್ರಖರ ಆದರೆ ಚಂದ್ರನಂತೆ ತಂಪು. ಇಷ್ಟು ಪ್ರಕಾಶಮಾನನಾಗಿರುವ ಭಗವಂತನ ರೂಪವನ್ನು ಯಾರೂ ಎಂದೆಂದೂ ತಮ್ಮ ಹೊರಗಣ್ಣಿನಿಂದ ಕಾಣಲು ಸಾಧ್ಯವಿಲ್ಲ.

ತತ್ರೈಕಸ್ಥಂ ಜಗತ್ ಕೃತ್ಸ್ನಂ ಪ್ರವಿಭಕ್ತಮನೇಕಧಾ।
ಅಪಶ್ಯದ್ ದೇವದೇವಸ್ಯ ಶರೀರೇ ಪಾಂಡವಸ್ತದಾ ॥೧೩॥

ತತ್ರ ಏಕಸ್ಥಮ್ ಜಗತ್ ಕೃತ್ಸ್ನಮ್ ಪ್ರವಿಭಕ್ತಮ್ ಅನೇಕಧಾ ।
ಅಪಶ್ಯತ್ ದೇವದೇವಸ್ಯ ಶರೀರೇ ಪಾಂಡವಃ ತದಾ –ಅರ್ಜುನ ಕಂಡನಾಗ ಬಗೆಬಗೆಯಿಂದ ವಿಂಗಡಗೊಂಡ ಇಡಿಯ ಪೊಡವಿ ಅಲ್ಲಿ, ದೇವದೇವನ ಮೈಯಲ್ಲಿ ಒಂದುಗೂಡಿದ್ದನ್ನು.

ಭಗವಂತ ಅರ್ಜುನನಿಗೆ ರಣರಂಗದಲ್ಲಿ ತೋರಿದ ವಿಶ್ವರೂಪ ತುಂಬಾ ವಿಶಿಷ್ಟವಾದದ್ದು. ಮಧ್ವಾಚಾರ್ಯರು ಹೇಳುವಂತೆ ಅರ್ಜುನನಿಗೆ ವಿಶ್ವರೂಪ ದರ್ಶನವಾದಾಗ, ಪ್ರಪಂಚದಲ್ಲಿ ಭಗವಂತನ ವಿಶ್ವರೂಪ ದರ್ಶನ

ಕಾಣುವ ಅರ್ಹತೆಯುಳ್ಳ ಎಲ್ಲರಿಗೂ ಈ ದರ್ಶನವಾಗಿತ್ತು. [ಮೂರು ಲೋಕದಲ್ಲಿರುವ, ಅರ್ಹತೆಯುಳ್ಳ ಸಮಸ್ತ ಜೀವಿಗಳಿಗೂ ಭಗವಂತನ ಈ ವಿಶೇಷ ದರ್ಶನವಾಗಿದೆ ಎನ್ನುವ ಮಾತು ಮುಂದೆ ಈ ಅಧ್ಯಾಯದಲ್ಲಿ ಬರುತ್ತದೆ]. ಅರ್ಜುನನಿಗೆ ಇಲ್ಲಿ ಕಾಣಿಸಿದ್ದು ಕೇವಲ ಎಲ್ಲೆಡೆ ತುಂಬಿರುವ ಭಗವಂತ ಮಾತ್ರವಲ್ಲ, ಆತನೊಳಗೆ ತುಂಬಿರುವ ಪ್ರಪಂಚ ಕೂಡಾ. [ಇಲ್ಲಿ ಭಗವಂತನೊಳಗೆ ವಿಶ್ವವನ್ನು ಕಾಣುವುದು ಅಂದರೆ ಧ್ಯಾನದಲ್ಲಿ ಪರಮಾತ್ಮನನ್ನು, ಆತನಿಂದ ಸೃಷ್ಟವಾದ ಸೃಷ್ಟಿಯನ್ನು ಕಂಡಂತೆ. ಸತ್ವದಿಂದ ಸ್ವಚ್ಛವಾದ ಮನಸ್ಸುಳ್ಳ ಅರ್ಜುನ(ಪಾಂಡವ), ತನ್ನ ದಿವ್ಯ ದೃಷ್ಟಿಯಿಂದ ಭಗವಂತನಲ್ಲಿ ತುಂಬಿರುವ ಇಡೀ ವಿಶ್ವವನ್ನು ಸ್ಪಷ್ಟವಾಗಿ ಕಂಡ.]

ತತಃ ಸ ವಿಸ್ಮಯಾವಿಷ್ಟೋ ಹೃಷ್ಟರೋಮಾ ಧನಂಜಯಃ।
ಪ್ರಣಮ್ಯ ಶಿರಸಾ ದೇವಂ ಕೃತಾಂಜಲಿರಭಾಷತ ॥೧೪॥

ತತಃ ಸಃ ವಿಸ್ಮಯ ಆವಿಷ್ಟಃ ಹೃಷ್ಟರೋಮಾ ಧನಂಜಯಃ ।
ಪ್ರಣಮ್ಯ ಶಿರಸಾ ದೇವಮ್ ಕೃತಾಂಜಲಿಃ ಅಭಾಷತ -ಬಳಿಕ ಬೆರಗಲ್ಲಿ ಮುಳುಗಿ ಮೈನವಿರೆದ್ದ ಅರ್ಜುನ ಭಗವಂತನಿಗೆ ತಲೆಬಾಗಿ ಕೈಜೋಡಿಸಿ ನುಡಿದ.

ಭಗವಂತನ ಈ ಅದ್ಭುತ ರೂಪವನ್ನು ಕಂಡ ಅರ್ಜುನ, ಆನಂದ ಆಶ್ಚರ್ಯ ದಿಗ್ಭ್ರಮೆಯಿಂದ ರೋಮಾಂಚನಗೊಂಡು ನಿಂತ. ಭಗವಂತನ ಅಪೂರ್ವವಾದ ಇಂತಹ ಅದ್ಭುತ ದರ್ಶನ ಸಂಪತ್ತನ್ನು(ಧನ) ಪಡೆದ ಆತ(ಧನಂಜಯಃ), ಭಕ್ತಿ ಪೂರ್ವಕವಾಗಿ ಉದ್ದಂಡ ನಮಸ್ಕಾರ ಮಾಡಿ, ತನ್ನೆರಡು ಕೈ ಜೋಡಿಸಿ (ಕೈಮುಗಿದು) ನಿಂತು, ಭಗವಂತನನ್ನು ಸ್ತೋತ್ರ ಮಾಡಲಾರಂಭಿಸಿದ.

ಅರ್ಜುನ ಉವಾಚ ।
ಪಶ್ಯಾಮಿ ದೇವಾಂಸ್ತವ ದೇವ ದೇಹೇ ಸರ್ವಾಂಸ್ತಥಾ ಭೂತವಿಶೇಷಸಂಘಾನ್ ।
ಬ್ರಹ್ಮಾಣಮೀಶಂ ಕಮಲಾಸನಸ್ಥಂ ಋಷೀಂಶ್ಚ ಸರ್ವಾನುರಗಾಂಶ್ಚ ದಿವ್ಯಾನ್ ॥೧೫॥

ಅರ್ಜುನಃ ಉವಾಚ-ಅರ್ಜುನ ನುಡಿದನು:
ಪಶ್ಯಾಮಿ ದೇವಾನ್ ತವ ದೇವ ದೇಹೇ ಸರ್ವಾನ್ ತಥಾ ಭೂತ ವಿಶೇಷ ಸಂಘಾನ್ ।
ಬ್ರಹ್ಮಾಣಮ್ ಈಶಮ್ ಕಮಲಾಸನಸ್ಥಂ ಋಷೀನ್ ಚ ಸರ್ವಾನ್ ಉರಗಾನ್ ಚ ದಿವ್ಯಾನ್ --ಓ ದೇವಾ, ನಿನ್ನ ಮೈಯಲ್ಲಿ ಕಾಣುತ್ತಿದ್ದೇನೆ ದೇವತೆಗಳನ್ನೆಲ್ಲ. ಅಂತೆಯೇ ಬಗೆಬಗೆಯ ಜೀವಿಗಳ ಗಡಣಗಳನ್ನು. ಬ್ರಹ್ಮನನ್ನು, ಅವನ ತೊಡೆಯಲ್ಲಿ ಕುಳಿತ ಶಿವನನ್ನು, ಎಲ್ಲಾ ಋಷಿಗಳನ್ನು ಮತ್ತು ದಿವ್ಯ ಶಕ್ತಿಯ ಉರಗಗಳನ್ನು.
ಅರ್ಜುನ ಕೃಷ್ಣನ ಅತ್ಯದ್ಭುತ ರೂಪವನ್ನು ನೋಡುತ್ತಿದ್ದಾನೆ. ಆತನಿಗೆ ಸಮಸ್ತ ದೇವತೆಗಳೂ ಆ ಭಗವಂತನೊಳಗೆ ಕಾಣುತ್ತಿದ್ದಾರೆ. ದೇವತೆಗಳು, ರಾಕ್ಷಸರು, ಅಸುರರು, ಗಂಧರ್ವರು, ಅಪ್ಸರರು, ಯಕ್ಷರು , ಮನುಷ್ಯರು, ಪ್ರಾಣಿಗಳು ಹೀಗೆ ಎಲ್ಲರೂ. ಮುಖ್ಯವಾಗಿ ಅರ್ಜುನ ಭಗವಂತನೊಳಗೆ ಚತುರ್ಮುಖ ಬ್ರಹ್ಮ, ಶಿವ,

ಮಹಾನ್ ಋಷಿಗಳು ಮತ್ತು ದೇವಾಂಶ ಸಂಭೂತ ದಿವ್ಯ ಉರಗಗಳನ್ನು ಆ ಶೇಷಶಾಯಿ ಭಗವಂತನಲ್ಲಿ ಕಾಣುತ್ತಿದ್ದಾನೆ.

ಅನೇಕಬಾಹೂದರವಕ್ತ್ರನೇತ್ರಂ ಪಶ್ಯಾಮಿ ತ್ವಾಂ ಸರ್ವತೋಽನಂತರೂಪಮ್ ।
ನಾಂತಂ ನ ಮಧ್ಯಂ ನ ಪುನಸ್ತವಾಽದಿಂ ಪಶ್ಯಾಮಿ ವಿಶ್ವೇಶ್ವರ ವಿಶ್ವರೂಪ ॥೧೬॥

ಅನೇಕ ಬಾಹು ಉದರ ವಕ್ತ್ರ ನೇತ್ರಮ್ ಪಶ್ಯಾಮಿ ತ್ವಾಮ್ ಸರ್ವತಃ ಅನಂತ ರೂಪಮ್ ।
ನ ಅಂತಮ್ ನ ಮಧ್ಯಮ್ ನ ಪುನಃ ತವ ಆದಿಮ್ ಪಶ್ಯಾಮಿ ವಿಶ್ವೇಶ್ವರ ವಿಶ್ವರೂಪ – ಎಣಿಕೆಯಿರದ ತೋಳುಗಳು, ಒಡಲು, ಬಾಯಿ, ಕಣ್ಣುಗಳು. ಎಲ್ಲೆಡೆಯೂ ಎಣಿಕೆಯಿರದ ರೂಪಗಳ ನಿನ್ನನ್ನು ಕಾಣುತ್ತಿದ್ದೇನೆ. ಓ ಪೊಡವಿಗೊಡೆಯನೇ, ಓ ವಿಶ್ವರೂಪನೇ, ನಿನ್ನ ತುದಿ ಕಾಣುತ್ತಿಲ್ಲ; ಇಲ್ಲ ನಡು; ಇಲ್ಲ ಬುಡ ಕೂಡಾ.

ಎಲ್ಲಿ ನೋಡಿದರಲ್ಲಿ ಮುಖ, ಎಲ್ಲಿ ನೋಡಿದರಲ್ಲಿ ಕಣ್ಣು, ಎಲ್ಲಿ ನೋಡಿದರಲ್ಲಿ ತೋಳು, ಎಲ್ಲಿ ನೋಡಿದರಲ್ಲಿ ಉದರ. ಈ ಶ್ಲೋಕ ಪುರುಷಸೂಕ್ತಕ್ಕೆ ವ್ಯಾಖ್ಯಾನ ರೂಪದಲ್ಲಿದೆ. ಪುರುಷ ಸೂಕ್ತದಲ್ಲಿ ಹೇಳುವಂತೆ: "ಓಂ ಸಹಸ್ರಶೀರ್ಷಾ ಪುರುಷಃ | ಸಹಸ್ರಾಕ್ಷಃ ಸಹಸ್ರಪಾತ್ | -ಭಗವಂತನಿಗೆ ಸಹಸ್ರಾರು ಶಿರಗಳು, ಸಹಸ್ರಾರು ಕಣ್ಣುಗಳು, ಸಹಸ್ರಾರು ಪಾದಗಳು. ಎಲ್ಲಿ ಏನನ್ನು ಕಾಣಬೇಕೆಂದು ಅಪೇಕ್ಷೆ ಪಟ್ಟು ಅರ್ಜುನ ಕಂಡನೋ ಅಲ್ಲಿ ಆತ ಬಯಸಿದ್ದು ಕಾಣಿಸಿತು. ಇದು ಒಂದು ವಿಚಿತ್ರ ಅನುಭವ. ಇದನ್ನು ವಿವರಿಸುವುದು ಅಸಾಧ್ಯ. ಕೇವಲ ಅನುಭವಿಸಬೇಕು. ಅನಂತ ರೂಪಿ ಭಗವಂತನ ರೂಪಕ್ಕೆ ತುದಿ ಬುಡವಿಲ್ಲ. ಸಮಸ್ತ ಜಗದ ಸ್ವಾಮಿ ಭಗವಂತ ಅಣುವಿಗಿಂತ ಅಣು ಕೂಡಾ ಹೌದು, ಮಹತೋಮಯ ಕೂಡಾ ಹೌದು. ಭಗವಂತನ ಈ ರೂಪವನ್ನು ಧ್ಯಾನದಲ್ಲಿ ಕಾಣುವುದು ಬಹಳ ಕಷ್ಟ. ಶಾಸ್ತ್ರಕಾರರು ಹೇಳುವಂತೆ ಧ್ಯಾನದಲ್ಲಿ ಭಗವಂತನ ಪೂರ್ಣ ಶರೀರ ಕಾಣಬೇಕು ಎಂದುಕೊಂಡು ಕುಳಿತರೆ ಏನೂ ಕಾಣದೇ ಇರಬಹುದು. ಅದಕ್ಕಾಗಿ ಕೊಳಲನೂದುವ ಆತನ ಒಂದು ಕಿರಿ ಬೆರಳಿನ ಮೇಲೋ, ಆತನ ಕರುಣಾಪೂರ್ಣ ಕಣ್ಣಿನ ನೋಟವನ್ನೋ ಕೇಂದ್ರೀಕರಿಸಿ ಧ್ಯಾನ ಅಭ್ಯಾಸ ಮಾಡುವುದು ಒಳ್ಳೆಯದು.

ಕಿರೀಟಿನಂ ಗದಿನಂ ಚಕ್ರಿಣಂ ಚ ತೇಜೋರಾಶಿಂ ಸರ್ವತೋ ದೀಪ್ತಿಮಂತಮ್ ।
ಪಶ್ಯಾಮಿ ತ್ವಾಂ ದುರ್ನಿರೀಕ್ಷ್ಯಂ ಸಮಂತಾತ್ ದೀಪ್ತನಲಾರ್ಕದ್ಯುತಿಮಪ್ರಮೇಯಮ್॥೧೭॥

ಕಿರೀಟಿನಮ್ ಗದಿನಮ್ ಚಕ್ರಿಣಮ್ ಚ ತೇಜೋರಾಶಿಮ್ ಸರ್ವತಃ ದೀಪ್ತಿಮಂತಮ್ ।
ಪಶ್ಯಾಮಿ ತ್ವಾಮ್ ದುರ್ನಿರೀಕ್ಷ್ಯಮ್ ಸಮಂತಾತ್ ದೀಪ್ತ ಅನಳ ಅರ್ಕ ದ್ಯುತಿಮ್ ಅಪ್ರಮೇಯಮ್–ತಲೆಯಲ್ಲಿ ಮುಕುಟ. ಕೈಯಲ್ಲಿ ಗದೆ ಮತ್ತು ಚಕ್ರ. ಬೆಳಕಿನ ಮುದ್ದೆಯಾಗಿ ಎಲ್ಲೆಡೆಯೂ ಕೋರಯಿಸುವ ರೂಪ. ಸುಡುವ ಬೆಂಕಿಯಂತೆ, ಸೂರ್ಯನಂತೆ ಪ್ರಕಾಶವುಳ್ಳ , ಅಳೆಯಲಾಗದ ರೂಪ. ಕಣ್ಕುಕ್ಕುವ ನಿನ್ನ ಆ ರೂಪವನ್ನೇ ಸುತ್ತಲೂ ಕಾಣುತ್ತಿದ್ದೇನೆ.

ಸರ್ವಾಭರಣಭೂಶಿತನಾದ ಮನಮೋಹಕ ರೂಪ ಒಂದು ಕಡೆಯಾದರೆ, ಚಕ್ರ-ಗದೆಯನ್ನು ಹಿಡಿದ ಶತ್ರು ಭಯಂಕರ ರೂಪ ಇನ್ನೊಂದೆಡೆ. ಹೀಗೆ ಎಲ್ಲವೂ ಒಂದು ಬೆಳಕಿನ ಪುಂಜದಂತೆ ಕಾಣುತ್ತಿದೆ. ನೋಡಲಾಗದ್ದನ್ನು ಸ್ಪಷ್ಟವಾಗಿ ನೋಡುತ್ತಿರುವ ಅನುಭವ. ಅದು ಸುಡುವ ಬೆಂಕಿಯೋ ಅಥವಾ ಹೊಳೆವ ಸೂರ್ಯನೋ ತಿಳಿಯುತ್ತಿಲ್ಲ. ಅದೊಂದು ಅಳೆಯಲಾಗದ, ಅರಿಯಲಾಗದ ಅತ್ಯದ್ಭುತ ಅಪೂರ್ವ ರೂಪ.

ತ್ವಮಕ್ಷರಂ ಪರಮಂ ವೇದಿತವ್ಯಂ ತ್ವಮಸ್ಯ ವಿಶ್ವಸ್ಯ ಪರಂ ನಿಧಾನಮ್ ।
ತ್ವಮವ್ಯಯಃ ಶಾಶ್ವತಧರ್ಮಗೋಪ್ತಾ ಸನಾತನಸ್ತ್ವಂ ಪುರುಷೋ ಮತೋ ಮೇ॥೧೮॥

ತ್ವಮ್ ಅಕ್ಷರಮ್ ಪರಮಮ್ ವೇದಿತವ್ಯಮ್ ತ್ವಮ್ ಅಸ್ಯ ವಿಶ್ವಸ್ಯ ಪರಮ್ ನಿಧಾನಮ್ ।
ತ್ವಮ್ ಅವ್ಯಯಃ ಶಾಶ್ವತ ಧರ್ಮಗೋಪ್ತಾ ಸನಾತನಃ ತ್ವಮ್ ಪುರುಷಃ ಮತಃ ಮೇ – ನೀನು ಅಳಿವಿರದವನು. ಅರಿಯಬೇಕಾದ ಹಿರಿಯ ತತ್ವ. ನೀನು ಈ ಜಗಕೆಲ್ಲಾ ಹಿರಿಯಾಸರೆ. ನೀನು ಬದಲಾಗದವನು. ಸನಾತನಧರ್ಮವನ್ನು ಸಲಹುವವನು. ನೀನು ಪುರಾಣ ಪುರುಷೋತ್ತಮ ಎಂದು ಗೊತ್ತು ನನಗೆ.

"ನೀನು ಅಕ್ಷರಂ ಪರಮಂ" ಎನ್ನುತ್ತಾನೆ ಅರ್ಜುನ. ಇಲ್ಲಿ ಅಕ್ಷರ ಎಂದರೆ ಸರ್ವ ವ್ಯಾಪ್ತ, ನಾಶವಿಲ್ಲದ ತತ್ವ, ಸರ್ವಾಭೀಷ್ಟಪ್ರದ, ಸರ್ವಶಬ್ದವಾಚ್ಯ ಇತ್ಯಾದಿ. ನಾವು ತಿಳಿದುಕೊಳ್ಳಬೇಕಾಗಿರುವುದರಲ್ಲೇ ಸರ್ವಶ್ರೇಷ್ಠವಾದದ್ದು-ಭಗವಂತ. ಅರ್ಜುನ ಹೇಳುತ್ತಾನೆ: "ನೀನು ಇಡೀ ಜಗತ್ತಿನ ಸೃಷ್ಟಾರ, ಆಶ್ರಯದಾತ. ಸಮಸ್ತ ಜಗತ್ತಿನ ಮೂಲಾಶ್ರಯ. ಅನಾಧಿ ಅನಂತ ಕಾಲದಲ್ಲಿ ಶಾಶ್ವತ ಧರ್ಮವನ್ನು ರಕ್ಷಣೆ ಮಾಡುವವನು ನೀನು. ಸಮಸ್ತ ವೇದ ಪ್ರತಿಪಾದ್ಯ ನೀನು ಎನ್ನುವುದು ನನಗೆ ಮನವರಿಕೆಯಾಯಿತು" ಎಂದು. [ಈ ಶ್ಲೋಕದಲ್ಲಿ ಬಂದಿರುವ ಹಲವು ವಿಶೇಷ ಪದಗಳ(ಅಕ್ಷರಃ, ಪುರುಷಃ, ಅವ್ಯಯಃ, ಶಾಶ್ವತಧರ್ಮ, ಇತ್ಯಾದಿ)ವಿಶೇಷ ಅರ್ಥವನ್ನು ನಾವು ಈ ಹಿಂದಿನ ಅಧ್ಯಾಯಗಳಲ್ಲಿ ವಿಶ್ಲೇಷಿಸಿರುವುದರಿಂದ ಇಲ್ಲಿ ಆ ವಿವರಣೆಯನ್ನು ಕೊಟ್ಟಿಲ್ಲ].

ಅನಾದಿಮಧ್ಯಾಂತಮನಂತವೀರ್ಯಂ ಅನಂತಬಾಹುಂ ಶಶಿಸೂರ್ಯನೇತ್ರಮ್ ।
ಪಶ್ಯಾಮಿ ತ್ವಾಂ ದೀಪ್ತಹುತಾಶವಕ್ತ್ರಂ ಸ್ವತೇಜಸಾ ವಿಶ್ವಮಿದಂ ತಪಂತಮ್ ॥೧೯॥

ಅನಾದಿ ಮಧ್ಯಾಂತಮ್ ಅನಂತವೀರ್ಯಮ್ ಅನಂತಬಾಹುಮ್ ಶಶಿಸೂರ್ಯನೇತ್ರಮ್ ।
ಪಶ್ಯಾಮಿ ತ್ವಾಮ್ ದೀಪ್ತ ಹುತಾಶ ವಕ್ತ್ರಂ ಸ್ವತೇಜಸಾ ವಿಶ್ವಮ್ ಇದಮ್ ತಪಂತಮ್ –ಗುಣಗಳಿಗೆ ಬುಡವಿಲ್ಲ; ನಡುವಿಲ್ಲ; ತುದಿಯಿಲ್ಲ. ಆಳವನ್ನು ಅಳೆದವರಿಲ್ಲ. ಎಣಿಕೆಯಿರದ ತೋಳುಗಳು. ಸೂರ್ಯಚಂದ್ರರನು ಹುಟ್ಟಿಸಿದ ಕಣ್ಣುಗಳು. ಉರಿವ ಬೆಂಕಿಯನುಗುಳುವ ಬಾಯಿ. ಕಾಣುತ್ತಿದ್ದೇನೆ ತನ್ನ ಥಟ್ಟುರಿಯಿಂದ ಈ ಜಗವ ಸುಟ್ಟುರಿವ ನಿನ್ನನ್ನು.

ನಿನ್ನ ಗುಣಗಳಿಗೆ ಆದಿ ಅಂತ ನಡುವೆಂಬುದಿಲ್ಲ. ನೀನು ಅನಂತವೀರ್ಯ. ಆದಿ ಅಂತವಿಲ್ಲದ ಪರಾಕ್ರಮ ನಿನ್ನದು. ನಾಶವಿಲ್ಲದ ಅನಂತ ಅವಯವಗಳು. ನಿನ್ನ ಕಣ್ಣುಗಳಿಂದ ಹುಟ್ಟಿದ ಆ ಸೂರ್ಯ ಚಂದ್ರರು; ಉಗುಳುವ ಬೆಂಕಿಯ ಜ್ವಾಲೆ ನಿನ್ನ ಬಾಯಿಯಲ್ಲಿ. ನಿನ್ನ ತೇಜಸ್ಸಿನಿಂದ ಇಡೀ ವಿಶ್ವ ಸುಟ್ಟುರಿದಂತಿದೆ.

ದ್ಯಾವಾಪೃಥಿವ್ಯೋರಿದಮಂತರಂ ಹಿ ವ್ಯಾಪ್ತಂ ತ್ವಯೈಕೇನ ದಿಶಶ್ಚ ಸರ್ವಾಃ ।
ದೃಷ್ಟ್ವಾಽದ್ಭುತಂ ರೂಪಮುಗ್ರಂ ತವೇದಂ ಲೋಕತ್ರಯಂ ಪ್ರವ್ಯಥಿತಂ ಮಹಾತ್ಮನ್ ॥೨೦॥

ದ್ಯಾವಾಪೃಥಿವ್ಯೋಃ ಇದಮ್ ಅಂತರಮ್ ಹಿ ವ್ಯಾಪ್ತಮ್ ತ್ವಯಾ ಏಕೇನ ದಿಶಃ ಚ ಸರ್ವಾಃ ।
ದೃಷ್ಟ್ವಾ ಅದ್ಭುತಮ್ ರೂಪಮ್ ಉಗ್ರಮ್ ತವ ಇದಮ್ ಲೋಕತ್ರಯಮ್ ಪ್ರವ್ಯಥಿತಮ್ ಮಹಾತ್ಮನ್ -ಈ ನೆಲ ಮುಗಿಲ ನಡುವೆಲ್ಲಾ ಒಂದೇ ರೂಪದಿಂದ ತುಂಬಿರುವೆ. ನಿನ್ನವೇ ರೂಪಗಳು ಎಲ್ಲಾ ದಿಕ್ಕುಗಳಲ್ಲೂ. ಓ ಮಹಾತ್ಮನೇ, ಅಚ್ಚರಿಯ, ಎದೆಗೆಡಿಸುವ ನಿನ್ನ ಈ ರೂಪವನ್ನು ಕಂಡು ಕಂಗೆಟ್ಟಿದೆ ಮೂರು ಲೋಕ.

ನಿನ್ನ ರೂಪ ಭೂಮಿ ಆಕಾಶವನ್ನು ವ್ಯಾಪಿಸಿ ನಿಂತಿದೆ. ಎಲ್ಲಾ ದಿಕ್ಕುಗಳಲ್ಲಿ ಅನಂತವಾಗಿ ವ್ಯಾಪಿಸಿರುವ ನಿನ್ನ ರೂಪವನ್ನು ಕಾಣುತ್ತಿದ್ದೇನೆ. ಮೂರು ಲೋಕದಲ್ಲಿ ನಿನ್ನ ರೂಪವನ್ನು ಕಂಡವರು ಈ ನಿನ್ನ ಉಗ್ರ ರೂಪವನ್ನು ನೋಡಿ ಕಂಗೆಡುತ್ತಿದ್ದಾರೆ. ಜಗತ್ತು ತತ್ತರಿಸುತ್ತಿದೆ ಎಂದು ದಿಗ್ಭ್ರಮೆಯಿಂದ ಅರ್ಜುನ ತನ್ನ ಅನುಭವವನ್ನು ಭಗವಂತನಲ್ಲಿ ಹೇಳಿಕೊಳ್ಳುತ್ತಾನೆ.

ಅಮೀ ಹಿ ತ್ವಾಂ ಸುರಸಂಘಾ ವಿಶಂತಿ ಕೇಚಿದ್ ಭೀತಾಃ ಪ್ರಾಂಜಲಯೋ ಗೃಣಂತಿ ।
ಸ್ವಸ್ತೀತ್ಯುಕ್ತ್ವಾ ಮಹರ್ಷಿಸಿದ್ಧಸಂಘಾಃ ಸ್ತುವಂತಿ ತ್ವಾಂ ಸ್ತುತಿಭಿಃ ಪುಷ್ಕಳಾಭಿಃ ॥೨೧॥

ಅಮೀ ಹಿ ತ್ವಾಮ್ ಸುರಸಂಘಾ ವಿಶಂತಿ ಕೇಚಿತ್ ಭೀತಾಃ ಪ್ರಾಂಜಲಯಃ ಗೃಣಂತಿ ।
ಸ್ವಸ್ತಿ ಇತಿ ಉಕ್ತ್ವಾ ಮಹರ್ಷಿ ಸಿದ್ಧಸಂಘಾಃ ಸ್ತುವಂತಿ ತ್ವಾಮ್ ಸ್ತುತಿಭಿಃ ಪುಷ್ಕಳಾಭಿಃ -ನಿನ್ನೊಳಹೋಗುತ್ತಿದ್ದಾರೆ ಈ ದೇವತೆಗಳು ಗುಂಪುಗೂಡಿ. ಬೆಚ್ಚಿ ಕೈಮುಗಿದು ಬೇಡುತ್ತಿದ್ದಾರೆ. ಮತ್ತೆ ಕೆಲವರು 'ಒಳಿತಾಗಲಿ' ಎಂದು ಹಾರೈಸುತ್ತಾ ಹತ್ತು ಹಲವು ಹಾಡುಗಬ್ಬಗಳಿಂದ ನಿನ್ನನ್ನು ಹೊಗಳುತ್ತಿದ್ದಾರೆ ಹಿರಿಯ ಋಷಿಗಳು, ಗುಂಪು ಗುಂಪಾಗಿ.

ಕೆಲವರು ನಿನ್ನೊಳಗೆ ಹೋಗುತ್ತಿದ್ದಾರೆ, ಇನ್ನು ಕೆಲವರು ಹೊರಬರುತ್ತಿದ್ದಾರೆ. ಕೆಲವರು ಕೈಮುಗಿದು ನಿನ್ನ ಸ್ತೋತ್ರ ಮಾಡುತ್ತಿದ್ದಾರೆ. ಜ್ಞಾನಿಗಳು ನಿನ್ನ ಈ ಅದ್ಭುತ ರೂಪವನ್ನು ಕಂಡು 'ಜಗತ್ತಿಗೆ ಮಂಗಳವಾಗಲಿ' ಎಂದು ಹರಸುತ್ತಿದ್ದಾರೆ. ಋಷಿ ಮುನಿಗಳು ನಾನಾ ಸ್ತೋತ್ರಗಳಿಂದ ನಿನ್ನನ್ನು ಸ್ತುತಿಸುತ್ತಿದ್ದಾರೆ.

ರುದ್ರಾದಿತ್ಯಾ ವಸವೋ ಯೇ ಚ ಸಾಧ್ಯಾ ವಿಶ್ವೇಽಶ್ವಿನೌ ಮರುತಶ್ಚೋಷ್ಮಪಾಶ್ಚ ।
ಗಂಧರ್ವಯಕ್ಷಾಸುರಸಿದ್ಧಸಂಘಾವೀಕ್ಷಂತೇ ತ್ವಾಂ ವಿಸ್ಮಿತಾಶ್ಚೈವ ಸರ್ವೇ ॥೨೨॥

ರುದ್ರ ಆದಿತ್ಯಾಃ ವಸವಃ ಯೇ ಚ ಸಾಧ್ಯಾಃ ವಿಶ್ವೇ ಅಶ್ವಿನೌ ಮರುತಃ ಚ ಉಷ್ಮಪಾಃ ಚ ।
ಗಂಧರ್ವ ಯಕ್ಷ ಅಸುರ ಸಿದ್ಧ ಸಂಘಾಃ ವೀಕ್ಷಂತೇ ತ್ವಾಮ್ ವಿಸ್ಮಿತಾಃ ಚ ಏವ ಸರ್ವೇ –ರುದ್ರರು, ಆದಿತ್ಯರು, ವಸುಗಳು, ಸಾಧ್ಯರು, ವಿಶ್ವೇದೇವತೆಗಳು, ಅಶ್ವಿಗಳು, ಮರುತ್ತುಗಳು, ಪಿತೃಗಳು, ಗಂಧರ್ವರು, ಯಕ್ಷರು, ಅಸುರರು, ಸಿದ್ಧರು,-ಇವರೆಲ್ಲಾ ಗುಂಪುಗೂಡಿ ನಿಬ್ಬೆರಗಾಗಿ ನೋಡುತ್ತಿದ್ದಾರೆ ನಿನ್ನನ್ನು.

ಏಕಾದಶರುದ್ರರು, ದ್ವಾದಶಾದಿತ್ಯರು, ಅಷ್ಟವಸುಗಳು, ಸಾಧ್ಯರು, ವಿಶ್ವೇದೇವತೆಗಳು, ಅಶ್ವಿಗಳು, ಮರುತ್ತುಗಳು, ಪಿತೃಗಳು, ಗಂಧರ್ವರು, ದೇವಗಣ ಪ್ರವಿಷ್ಟರಾದ ಯಕ್ಷರು, ಅಸುರರು, ಸಿದ್ಧರು,-ಇವರೆಲ್ಲರೂ ನಿಬ್ಬೆರಗಾಗಿ ನಿನ್ನನ್ನು ನೋಡುತ್ತಿದ್ದಾರೆ ಎನ್ನುತ್ತಾನೆ ಅರ್ಜುನ.

ರೂಪಂ ಮಹತ್ ತೇ ಬಹುವಕ್ತ್ರನೇತ್ರಂ ಮಹಾಬಾಹೋ ಬಹುಬಾಹೂರುಪಾದಮ್ ।
ಬಹೂದರಂ ಬಹುದಂಷ್ಟ್ರಾಕರಾಳಂ ದೃಷ್ಟ್ವಾ ಲೋಕಾಃ ಪ್ರವ್ಯಥಿತಾಸ್ತಥಾಽಹಮ್ ॥೨೩॥

ರೂಪಮ್ ಮಹತ್ ತೇ ಬಹು ವಕ್ತ್ರ ನೇತ್ರಮ್ ಮಹಾಬಾಹೋ ಬಹುಬಾಹು ಊರು ಪಾದಮ್ ।
ಬಹು ಉದರಮ್ ಬಹುದಂಷ್ಟ್ರಾಕರಾಳಮ್ ದೃಷ್ಟ್ವಾ ಲೋಕಾಃ ಪ್ರವ್ಯಥಿತಾಃ ತಥಾ ಅಹಮ್ – ಓ ಮಹಾಬಾಹೂ, ಹಬ್ಬಿ ನಿಂತ ನಿನ್ನ ರೂಪಕ್ಕೆ ಹಲವು ಬಾಯಿ ಕಣ್ಣುಗಳು. ಹಲವು ತೊಡೆ ಕಾಲುಗಳು, ಹಲವು ಹೊಟ್ಟೆಗಳು. ಹಲವು ದಾಡೆಗಳಿಂದ ಅಬ್ಬರಗೊಂಡ ಈ ರೂಪವನ್ನು ಕಂಡು ಲೋಕದ ಮಂದಿ ಬೆಚ್ಚಿಬಿದ್ದಿದ್ದಾರೆ; ನಾನು ಕೂಡಾ.

ಭಗವಂತನ ಅಂಗಾಂಗಗಳಲ್ಲಿ ಹೇಗೆ ಸೃಷ್ಟಿ ಕ್ರಿಯೆ ನಡೆಯುತ್ತಿದೆ ಎನ್ನುವುದನ್ನು ಅರ್ಜುನ ಕಾಣುತ್ತಿದ್ದಾನೆ. ಪುರುಷ ಸೂಕ್ತದಲ್ಲಿ ಹೇಳುವಂತೆ :

ಬ್ರಾಹ್ಮಣೋಸ್ಯ ಮುಖಮಾಸೀತ್। ಬಾಹೂ ರಾಜನ್ಯಃ ಕೃತಃ।
ಊರೂ ತದಸ್ಯ ಯದ್ವೈಶ್ಯಃ। ಪದ್ಭ್ಯಾಗ್ಂ ಶೂದ್ರೋ ಅಜಾಯತ ॥೧೩॥

ಅಂದರೆ ಭಗವಂತನ ಮುಖದಿಂದ ಜ್ಞಾನಿಗಳ(Wisdom) ಸೃಷ್ಟಿ, ಬಾಹುವಿನಿಂದ ಕ್ಷತ್ರಿಯರ(Protection) ಸೃಷ್ಟಿ, ಸೊಂಟ ಅಥವಾ ತೊಡೆಯಿಂದ ವೈಶ್ಯರ(Production) ಸೃಷ್ಟಿ ಮತ್ತು ಪವಿತ್ರವಾದ ಪಾದದಿಂದ ಶೂದ್ರರ(Service) ಸೃಷ್ಟಿ. ಈ ನಾಲ್ಕು ವರ್ಗ ಈ ಸಮಾಜದ ನಾಲ್ಕು ಆಧಾರ ಸ್ಥಂಭಗಳು. ಅರ್ಜುನನಿಗೆ ಈ ನಾಲ್ಕು ವರ್ಗದ ಸೃಷ್ಟಿ ಭಗವಂತನ ದೇಹದಲ್ಲಾಗುತ್ತಿರುವುದು ಕಾಣಿಸುತ್ತಿದೆ. ಅದರ ಜೊತೆಗೆ ಆತ ಅಲ್ಲಿ ಎಲ್ಲರನ್ನು ಕಬಳಿಸುವ (ಸಂಹಾರ ಕ್ರಿಯೆ) ಹಲವು ದಾಡೆಗಳಿಂದ ತುಂಬಿದ ರೂಪವನ್ನು ಕಾಣುತ್ತಾನೆ. ಭಗವಂತನ ಈ ರೂಪವನ್ನು ಕಂಡು ಎಲ್ಲರೂ ವಿಸ್ಮಯರಾಗಿದ್ದಾರೆ. “ನಾನೂ ಕೂಡಾ ಗಾಬರಿಗೊಳಗಾಗಿದ್ದೇನೆ” ಎನ್ನುತ್ತಾನೆ ಅರ್ಜುನ.

ನಭಃಸ್ಪೃಶಂ ದೀಪ್ತಮನೇಕವರ್ಣಂ ವ್ಯಾತ್ತಾನನಂ ದೀಪ್ತವಿಶಾಲನೇತ್ರಮ್ ।
ದೃಷ್ಟ್ವಾ ಹಿ ತ್ವಾಂ ಪ್ರವ್ಯಥಿತಾಂತರಾತ್ಮಾ ಧೃತಿಂ ನ ವಿಂದಾಮಿ ಶಮಂ ಚ ವಿಷ್ಣೋ ॥೨೪॥

ನಭಃಸ್ಪೃಶಮ್ ದೀಪ್ತಮ್ ಅನೇಕ ವರ್ಣಮ್ ವ್ಯಾತ್ತ ಆನನಮ್ ದೀಪ್ತ ವಿಶಾಲ ನೇತ್ರಮ್ ।
ದೃಷ್ಟ್ವಾ ಹಿ ತ್ವಾಂ ಪ್ರವ್ಯಥಿತ ಅಂತರಾತ್ಮಾಃ ಧೃತಿಮ್ ನ ವಿಂದಾಮಿ ಶಮಮ್ ಚ ವಿಷ್ಣೋ – ಮುಗಿಲ ಮುತ್ತಿಟ್ಟ, ಹೊಳೆವ ಬಗೆಬಗೆಯ ಬಣ್ಣಗಳು. ತೆರೆದ ಬಾಯಿಗಳು. ಹೊಳೆವಗಲ ಕಣ್ಣುಗಳು. ಇಂತಹ ನಿನ್ನನ್ನು ಕಂಡು ಬಗೆ ಬೆಚ್ಚಿಬಿದ್ದಿದೆ. ಓ ಒಳಗೂ ಹೊರಗೂ ತುಂಬಿ ನಿಂತವನೇ, ನಾನು ಸ್ಥೈರಿಸಲಾರೆ. ನಾನು ನೆಮ್ಮದಿಗಾಣೆ.

ಭೂಮಿ ಆಕಾಶದಲ್ಲಿ ವ್ಯಾಪಿಸಿರುವ ನಿನ್ನ ಅನಂತ ರೂಪ-ಕತ್ತಲೆಯ ಸ್ಪರ್ಶವೇ ಇಲ್ಲದ ಬೆಳಕಿನ ಪುಂಜ. ನಿನ್ನೊಳಗೆ ಅನೇಕರು ಅನೇಕ ಶ್ರುತಿ ವಚನಗಳಿಂದ, ವೇದಗಳಿಂದ ನಿನ್ನನ್ನು ವರ್ಣಿಸುತ್ತಿದ್ದಾರೆ. ನಿನ್ನ ಅಪ್ರಾಕೃತವಾದ ಬಣ್ಣವನ್ನು ನಾನು ಕಾಣುತ್ತಿದ್ದೇನೆ. ನಿನ್ನ ಅನುಗ್ರಹ ಬೀರುವ, ಕಾರುಣ್ಯದ ಅರಳುಗಣ್ಣುಗಳನ್ನು ನಾನು ಕಂಡೆ. ಎಲ್ಲವನ್ನೂ ನೋಡಿ ಮನಸ್ಸು ಗೊಂದಲವಾಗುತ್ತಿದೆ. “ಓ ವಿಷ್ಣೋ, ಈ ನಿನ್ನ ವಿಚಿತ್ರ ರೂಪವನ್ನು ಅರ್ಥ ಮಾಡಿಕೊಳ್ಳಲಾಗುತ್ತಿಲ್ಲ” ಎನ್ನುತ್ತಾನೆ ಅರ್ಜುನ. [ವಿಷ್ಣು ಅನ್ನುವ ಪದದ ವಿಶಿಷ್ಟವಾದ ಅರ್ಥವನ್ನು ನಾವು ಹಿಂದಿನ ಅಧ್ಯಾಯದಲ್ಲಿ ವಿಶ್ಲೇಸಿದ್ದೇವೆ]

ದಂಷ್ಟ್ರಾಕರಾಳಾನಿ ಚ ತೇ ಮುಖಾನಿ ದೃಷ್ಟ್ವೈವ ಕಾಲಾನಲಸನ್ನಿಭಾನಿ ।
ದಿಶೋ ನ ಜಾನೇ ನ ಲಭೇ ಚ ಶರ್ಮ ಪ್ರಸೀದ ದೇವೇಶ ಜಗನ್ನಿವಾಸ ॥೨೫॥

ದಂಷ್ಟ್ರಾಕರಾಳಾನಿ ಚ ತೇ ಮುಖಾನಿ ದೃಷ್ಟ್ವಾ ಏವ ಕಾಲ ಅನಲ ಸನ್ನಿಭಾನಿ ।
ದಿಶಃ ನ ಜಾನೇ ನ ಲಭೇ ಚ ಶರ್ಮ ಪ್ರಸೀದ ದೇವೇಶ ಜಗತ್ ನಿವಾಸ –ಪ್ರಳಯ ಕಾಲದ ಬೆಂಕಿಯಂತೆ ಕೋರೆದಾಡೆಗಳ ಅಬ್ಬರದ ನಿನ್ನ ಮೊರೆಗಳನ್ನು ಕಂಡದ್ದೇ ದಿಕ್ಕು ತಿಳಿಯದಾಗಿದೆ. ನೆಮ್ಮದಿ ಇಲ್ಲವಾಗಿದೆ. ಓ ದೇವೇಶಾ, ಜಗದ ಆಸರೆಯೇ ದಯೆದೋರು.

ಎಲ್ಲಕ್ಕಿಂತ ಮಿಗಿಲಾಗಿ ನರಸಿಂಹನಂತೆ ಕೋರೆ ದಾಡೆಗಳಿಂದ ಬಾಯ್ದೆರೆದು ನಿಂತಿರುವ ನಿನ್ನ ಮುಖವನ್ನು ಕಂಡು ದಿಕ್ಕು ತೋಚದಾಗಿದೆ. ಪ್ರಳಯ ಕಾಲದ ಬೆಂಕಿಯಂತೆ ವ್ಯಾಪಿಸಿರುವ ನಿನ್ನನ್ನು ಕಂಡು ಗಾಬರಿಯಿಂದ ಆನಂದ ಮಾಯವಾಗುತ್ತಿದೆ. ನೆಮ್ಮದಿ ಕಳೆದುಕೊಳ್ಳುತ್ತಿದ್ದೇನೆ. ಓ ಸರ್ವ ದೇವತೆಗಳ ಒಡೆಯನೇ, ಜಗತ್ತಿಗೆ ಆಸರೆಯಾಗಿರುವ ನೀನು ನನ್ನ ಮೇಲೆ ದಯೆ ತೋರು.

ಅಮೀ ಚ ತ್ವಾಂ ಧೃತರಾಷ್ಟ್ರಸ್ಯ ಪುತ್ರಾಃ ಸರ್ವೇ ಸಹೈವಾವನಿಪಾಲಸಂಘೈಃ ।
ಭೀಷ್ಮೋ ದ್ರೋಣಃ ಸೂತಪುತ್ರಸ್ತಥಾಽಸೌ ಸಹಾಸ್ಮದೀಯೈರಪಿ ಯೋಧಮುಖ್ಯೈಃ ॥೨೬॥

ವಕ್ತ್ರಾಣಿ ತೇ ತ್ವರಮಾಣಾ ವಿಶಂತಿ ದಂಷ್ಟ್ರಾಕರಾಳಾನಿ ಭಯಾನಕಾನಿ।
ಕೇಚಿದ್ ವಿಲಗ್ನಾ ದಶನಾಂತರೇಷು ಸಂದೃಶ್ಯಂತೇ ಚೂರ್ಣಿತೈರುತ್ತಮಾಂಗೈಃ ॥೨೭॥

ಅಮೀ ಚ ತ್ವಾಂ ಧೃತರಾಷ್ಟ್ರಸ್ಯ ಪುತ್ರಾಃ ಸರ್ವೇ ಸಹ ಏವ ಅವನಿಪಾಲ ಸಂಘೈಃ ।
ಭೀಷ್ಮಃ ದ್ರೋಣಃ ಸೂತಪುತ್ರಃ ತಥಾ ಅಸೌ ಸಹ ಅಸ್ಮದೀಯೈಃ ಅಪಿ ಯೋಧ ಮುಖ್ಯೈಃ ||
ವಕ್ತ್ರಾಣಿ ತೇ ತ್ವರಮಾಣಾಃ ವಿಶಂತಿ ದಂಷ್ಟ್ರಾಕರಾಳಾನಿ ಭಯಾನಕಾನಿ ।
ಕೇಚಿತ್ ವಿಲಗ್ನಾಃ ದಶನ ಅಂತರೇಷು ಸಂದೃಶ್ಯಂತೇ ಚೂರ್ಣಿತೈಃ ಉತ್ತಮಾಂಗೈಃ – ಭೀಷ್ಮ ದ್ರೋಣ ಮತ್ತು ಕರ್ಣ, ಜೊತೆಗೆ ನಮ್ಮ ಕಾದಾಳುಗಳ ಮುಖಂಡರು ಕೂಡಾ. ಕಾಣುತ್ತಿದ್ದೇನೆ ಕಟವಾಯಿಯೆಡೆಯಲ್ಲಿ ಸಿಕ್ಕು ನುಗ್ಗು ನುರಿಯಾದ ಕೆಲವರನ್ನು; ನುಜ್ಜುಗುಜ್ಜಾದ ಅವರ ತಲೆಬುರುಡೆಗಳನ್ನು.

ಅರ್ಜುನ ಭಗವಂತನಲ್ಲಿ ಭವಿಷತ್ಕಾಲದಲ್ಲಿ ನಡೆಯುವ ಘಟನೆಗಳನ್ನು ಕಾಣುತ್ತಿದ್ದಾನೆ. ಪ್ರಪಂಚದಲ್ಲಿ ಎಲ್ಲವೂ ಪೂರ್ವ ನಿರ್ಧಾರಿತ. ಇದನ್ನು ಅರ್ಜುನ ತನ್ನ ದಿವ್ಯ ದೃಷ್ಟಿಯಲ್ಲಿ ಕಾಣುತ್ತಿದ್ದಾನೆ ಅಷ್ಟೆ. ಭೀಷ್ಮ ದ್ರೋಣ ಮತ್ತು ಕರ್ಣ ಎಲ್ಲರೂ ಆ ನಿನ್ನ ಬಾಯಿಯೊಳಗೆ ಹೋಗುತ್ತಿದ್ದಾರೆ. ಜೊತೆಗೆ ನಮ್ಮ ಸೈನ್ಯದ ಮುಖಂಡರೂ ಕೂಡಾ. ಅಲ್ಲಿ ಕೆಲವರು ಭಯಂಕರವಾದ ಆ ನಿನ್ನ ಕೋರೆ ದಾಡೆಗಳಿಗೆ ಸಿಕ್ಕು ನುಜ್ಜುಗುಜ್ಜಾಗುತ್ತಿರುವುದನ್ನು ಕಾಣುತ್ತಿದ್ದೇನೆ.

ಯಥಾ ನದೀನಾಂ ಬಹವೋಽಮ್ಬುವೇಗಾಃ ಸಮುದ್ರಮೇವಾಭಿಮುಖಾ ದ್ರವಂತಿ ।
ತಥಾ ತವಾಮೀ ನರಲೋಕವೀರಾ ವಿಶಂತಿ ವಕ್ತ್ರಾಣ್ಯಭಿವಿಜ್ವಲಂತಿ ॥೨೮॥

ಯಥಾ ನದೀನಾಮ್ ಬಹವಃ ಅಂಬುವೇಗಾಃ ಸಮುದ್ರಮ್ ಏವ ಅಭಿಮುಖಾಃ ದ್ರವಂತಿ ।
ತಥಾ ತವ ಅಮೀ ನರಲೋಕವೀರಾಃ ವಿಶಂತಿ ವಕ್ತ್ರಾಣಿ ಅಭಿವಿಜ್ವಲಂತಿ --ನರಲೋಕದ ಈ ವೀರರೆಲ್ಲಾ ಕೋರೈಸುವ ನಿನ್ನ ಮೋರೆಗಳೊಳಗೆ ಸೇರುತ್ತಿದ್ದಾರೆ. ನದಿಗಳ ಹತ್ತು ಹಲವು ನೀರ ಸೆಲೆಗಳು ಕಡಲ ಕಡೆಗೆ ಹರಿಯುವಂತೆ.

ಪುಣ್ಯ ಜೀವಿಗಳು ಭಗವಂತನ ಬಾಯಿಯನ್ನು ಹೇಗೆ ಪ್ರವೇಶಿಸುತ್ತಿದ್ದಾರೆ ಎನ್ನುವುದನ್ನು ಅರ್ಜುನ ವರ್ಣಿಸುತ್ತಿದ್ದಾನೆ. ಹೇಗೆ ಎಲ್ಲಾ ನದಿ ನೀರು ಸಮುದ್ರವನ್ನು ಸೇರುತ್ತದೋ ಹಾಗೇ ಈ ನರಲೋಕದ ವೀರರು ನಿನ್ನನ್ನು ಸೇರುತ್ತಿದ್ದಾರೆ ಎನ್ನುತ್ತಾನೆ ಅರ್ಜುನ. ಇದೊಂದು ಮಾಂಗಲಿಕ ದೃಷ್ಟಾಂತ. ಇಲ್ಲಿ ಭಯಾನಕ ನೋಟವಿಲ್ಲ.

ಯಥಾ ಪ್ರದೀಪ್ತಂ ಜ್ವಲನಂ ಪತಂಗಾಃ ವಿಶಂತಿ ನಾಶಾಯ ಸಮೃದ್ಧವೇಗಾಃ ।
ತಥೈವ ನಾಶಾಯ ವಿಶಂತಿ ಲೋಕಾಸ್ತವಾಪಿ ವಕ್ತ್ರಾಣಿ ಸಮೃದ್ಧವೇಗಾಃ ॥೨೯॥

ಯಥಾ ಪ್ರದೀಪ್ತಮ್ ಜ್ವಲನಮ್ ಪತಂಗಾಃ ವಿಶಂತಿ ನಾಶಾಯ ಸಮೃದ್ಧ ವೇಗಾಃ ।
ತಥಾ ಏವ ನಾಶಾಯ ವಿಶಂತಿ ಲೋಕಾಃ ತವ ಅಪಿ ವಕ್ತ್ರಾಣಿ ಸಮೃದ್ಧ ವೇಗಾಃ --ಲೋಕದ ಮಂದಿಯೆಲ್ಲ ಗಡಬಡಿಸಿ ಓಡುತ್ತಾ ಬಂದು ಸಾಯಲೆಂದು ನಿನ್ನ ಬಾಯ್ಗಳಲ್ಲಿ ಬೀಳುತ್ತಿವೆ- ಪತಂಗಗಳು ಹಾರಿ ಬಂದು ಬೆಂಕಿಯಲ್ಲಿ ಬಿದ್ದು ಸಾಯುವಂತೆ.

ಪಾಪಿಗಳು ಹೇಗೆ ಭಗವಂತನ ಬಾಯಿಯನ್ನು ಪ್ರವೇಶಿಸುತ್ತಿದ್ದಾರೆ ಎಂದು ವರ್ಣಿಸುತ್ತಾ ಅರ್ಜುನ ಹೇಳುತ್ತಾನೆ: "ಉರಿಯುವ ಬೆಂಕಿಗೆ ಪತಂಗಗಳು ಬಿದ್ದು ನಾಶವಾದಂತೆ ಗಡಬಡಿಸಿ ಬಂದು ಬಿದ್ದು ನಾಶವಾಗುತ್ತಿದ್ದಾರೆ" ಎಂದು.

ಲೇಲಿಹ್ಯಸೇ ಗ್ರಸಮಾನಃ ಸಮಂತಾತ್ ಲೋಕಾನ್ ಸಮಗ್ರಾನ್ ವದನೈರ್ಜ್ವಲದ್ಭಿಃ ।
ತೇಜೋಭಿರಾಪೂರ್ಯ ಜಗತ್ ಸಮಗ್ರಂ ಭಾಸಸ್ತವೋಗ್ರಾಃ ಪ್ರತಪಂತಿ ವಿಷ್ಣೋ ॥೩೦॥

ಲೇಲಿಹ್ಯಸೇ ಗ್ರಸಮಾನಃ ಸಮಂತಾತ್ ಲೋಕಾನ್ ಸಮಗ್ರಾನ್ ವದನೈಃ ಜ್ವಲದ್ಭಿಃ ।
ತೇಜೋಭಿಃ ಆಪೂರ್ಯ ಜಗತ್ ಸಮಗ್ರಮ್ ಭಾಸಃ ತವ ಉಗ್ರಾಃ ಪ್ರತಪಂತಿ ವಿಷ್ಣೋ –ಓ ಎಲ್ಲೆಲ್ಲೂ ತುಂಬಿರುವವನೇ, ಬೆಂಕಿ ಕಾರುವ ಬಾಯಿಗಳಿಂದ ಎಲ್ಲಾ ಲೋಕಗಳನ್ನು ಎಲ್ಲೆಡೆಯೂ ನುಂಗಿ ನೊಣೆಯುತ್ತಿರುವೆ. ಕೋರೈಸುವ ನಿನ್ನ ಮೈಯ ಹೊಳಪು ಇಡಿಯ ವಿಶ್ವವನ್ನು ಝಳದಿಂದ ತುಂಬಿ ಸುಡುತ್ತಿವೆ.

ಎಲ್ಲವನ್ನೂ ನಿನ್ನ ನಾಲಿಗೆಯಿಂದ ಸವರಿ ನುಂಗುತ್ತಿದ್ದೀಯ, ಎಲ್ಲವೂ ನಿನ್ನ ಹೊಟ್ಟೆಯನ್ನು ಸೇರುತ್ತಿವೆ. ಈ ಜಗತ್ತೇ ನಿನಗೊಂದು ತುತ್ತಾಗುತ್ತಿದೆ. ಆ ನಿನ್ನ ಮೈಯ ತೇಜಸ್ಸು ಜಗತ್ತಿನೆಲ್ಲೆಡೆಗೆ ತುಂಬುತ್ತಿದೆ. ಎಲ್ಲರ ಒಳಗೂ ಹೊರಗೂ ತುಂಬಿರುವ ನೀನು ಸರ್ವ ಸಂಹಾರಕರನಾಗಿ ಕಾಣುತ್ತಿದ್ದೀಯ(ವಿಷ್ಣೋ).

ಆಖ್ಯಾಹಿ ಮೇ ಕೋ ಭವಾನುಗ್ರರೂಪೋ ನಮೋಽಸ್ತು ತೇ ದೇವವರ ಪ್ರಸೀದ ।
ವಿಜ್ಞಾತುಮಿಚ್ಛಾಮಿ ಭವಂತಮಾದ್ಯಂ ನಹಿ ಪ್ರಜಾನಾಮಿ ತವ ಪ್ರವೃತ್ತಿಮ್ ॥೩೧॥

ಆಖ್ಯಾಹಿ ಮೇ ಕಃ ಭವಾನ್ ಉಗ್ರ ರೂಪಃ ನಮಃ ಅಸ್ತು ತೇ ದೇವ ವರ ಪ್ರಸೀದ ।
ವಿಜ್ಞಾತುಮ್ ಇಚ್ಛಾಮಿ ಭವಂತಮ್ ಆದ್ಯಮ್ ನ ಹಿ ಪ್ರಜಾನಾಮಿ ತವ ಪ್ರವೃತ್ತಿಮ್ –ಹೇಳು ನನಗೆ: ಅಂಜಿಸುವ ರೂಪ ತಳೆದು ಬಂದ ನಿನ್ನ ಬಿತ್ತರವೇನು? ಓ ಹಿರಿಯ ದೈವತವೇ, ನಿನಗೆ ತಲೆಬಾಗುತಿದ್ದೇನೆ. ದಯೆದೋರು. ಎಲ್ಲಕ್ಕೂ ಮೊದಲಿರುವ ನಿನ್ನನ್ನು ತಿಳಿಯ ಬಯಸುತ್ತೇನೆ.ನಿನ್ನ ಉದ್ದೇಶವೇನು ಎಂದು ತಿಳಿಯುತ್ತಿಲ್ಲ.

ಈ ನಿನ್ನ ಭಯಂಕರ ರೂಪವನ್ನು ಕಂಡು ನನಗೇನೂ ಅರ್ಥವಾಗುತ್ತಿಲ್ಲ. ನಿನ್ನ ಮಹಿಮೆ ಅರಿಯದಾಗಿದ್ದೇನೆ. ನಿನ್ನಲ್ಲಿ ನಾನು ಶರಣು ಬಂದಿದ್ದೇನೆ. ನನ್ನನ್ನು ಉದ್ಧರಿಸು. ಈ ಭಯಂಕರ ರೂಪ ತೊಟ್ಟ ನಿನ್ನನ್ನು ತಿಳಿಯಬಯಸುತ್ತಿದ್ದೇನೆ. ಎಂದು ಅರ್ಜುನ ಕೃಷ್ಣನಲ್ಲಿ ಅಂಗಲಾಚಿ ಬೇಡಿಕೊಳ್ಳುತ್ತಾನೆ.

ಭಗವಾನುವಾಚ ।

ಕಾಲೋಽಸ್ಮಿ ಲೋಕಕ್ಷಯಕೃತ್ ಪ್ರವೃದ್ಧೋ ಲೋಕಾನ್ ಸಮಾಹರ್ತುಮಿಹ ಪ್ರವೃತ್ತಃ ।

ಋತೇಽಪಿ ತ್ವಾಂ ನ ಭವಿಷ್ಯಂತಿ ಸರ್ವೇ ಯೇಽವಸ್ಥಿತಾಃ ಪ್ರತ್ಯನೀಕೇಷು ಯೋಧಾಃ ॥೩೨॥

ಭಗವಾನುವಾಚ-ಭಗವಂತ ಹೇಳಿದನು:

ಕಾಲಃ ಅಸ್ಮಿ ಲೋಕಕ್ಷಯಕೃತ್ ಪ್ರವೃದ್ಧಃ ಲೋಕಾನ್ ಸಮಾಹರ್ತುಮ್ ಇಹ ಪ್ರವೃತ್ತಃ ।

ಋತೇ ಅಪಿ ತ್ವಾಮ್ ನ ಭವಿಷ್ಯಂತಿ ಸರ್ವೇ ಯೇ ಅವಸ್ಥಿತಾಃ ಪ್ರತಿ ಅನೀಕೇಷು ಯೋಧಾಃ –ಲೋಕಗಳನ್ನು ಕಬಳಿಸಲು ಬೆಳೆದು ನಿಂತಿರುವ ಕಾಲ ಪುರುಷ ನಾನು. ಈಗಿಲ್ಲಿ, ಲೋಕಗಳನ್ನು ಮುಗಿಸಿಬಿಡಲೆಂದು ಹೊರಟವನು. ನೀನಿರದಿದ್ದರೂ [ನಿನ್ನನ್ನು, ನಿನ್ನ ಸೋದರರರನ್ನು ಮತ್ತೆ ಕೆಲವರನ್ನು ಬಿಟ್ಟು] ಎರಡೂ ಕಡೆಯ ಪಡೆಗಳಲ್ಲಿ ನಿಂತ ಯಾವ ಕಾದಾಳುಗಳೂ ಉಳಿಯುವುದಿಲ್ಲ.

ಕೃಷ್ಣ ಹೇಳುತ್ತಾನೆ "ನಾನು ಕಾಲಪುರುಷನಾಗಿ ನಿಂತಿದ್ದೇನೆ" ಎಂದು. 'ಕಲ' ಧಾತುವಿನಿಂದ ಬಂದಿರುವ 'ಕಾಲ' ಎನ್ನುವ ಪದ ಅನೇಕ ಅರ್ಥವನ್ನು ಕೊಡುತ್ತದೆ. ಸರ್ವಸಂಹಾರಕ, ಸರ್ವಗುಣಪೂರ್ಣ, ಸರ್ವಜ್ಞ ಇತ್ಯಾದಿ. ಇಲ್ಲಿ ವಿಶೇಷವಾಗಿ ಕೃಷ್ಣ ಸಂಹಾರ ಶಕ್ತಿಯಾಗಿ ನಿಂತಿದ್ದಾನೆ. ನಾನು ನಿನಗೆ ಸಾರಥಿಯಾಗಿ ನಿಂತು ಭೂಮಿಗೆ ಭಾರವಾಗಿರುವ ಇವರನ್ನು ಮುಗಿಸಲೆಂದೇ ನಿಂತಿರುವುದು ಎನ್ನುತ್ತಾನೆ ಕೃಷ್ಣ. ಮಹಾಭಾರತ ಯುದ್ಧವನ್ನು ನೋಡಿದರೆ ಅದು ಒಂದು ಮಹಾಯುದ್ಧ. ಅಲ್ಲಿ ಸುಮಾರು ಐವತ್ತು ಲಕ್ಷ ಮಂದಿ ಸತ್ತಿದ್ದಾರೆ. ಅಂದಿನ ದೇಶದ ಜನಸಂಖ್ಯೆಯನ್ನು ನೋಡಿದರೆ ಅದು ಒಟ್ಟು ಜನಸಂಖ್ಯೆಯ ಸುಮಾರು ಹತ್ತನೇ ಒಂದು ಭಾಗ. ಭಾಗವತದಲ್ಲಿ ಹೇಳುವಂತೆ- ಕಾಲಪುರುಷನಾಗಿ ನಿಂತು ಕೃಷ್ಣ ಯಾವುದೇ ಆಯುಧ ಹಿಡಿಯದೇ ಎಲ್ಲರ ಆಯುಸ್ಸನ್ನು ತನ್ನ ಕಣ್ಣಿನಿಂದ ಹೀರಿದ. ಅದಕ್ಕಾಗಿ ಕೃಷ್ಣ ಅರ್ಜುನನಿಗೆ ಹೇಳುತ್ತಾನೆ- "ನೀನಿಲ್ಲದಿದ್ದರೂ ಇವರೆಲ್ಲರೂ(ಎರಡೂ ಕಡೆಯವರು) ಸಾಯುತ್ತಾರೆ. ಅವರ ಸಾವು ತೀರ್ಮಾನವಾಗಿ ಬಿಟ್ಟಿದೆ" ಎಂದು.

ತಸ್ಮಾತ್ ತ್ವಮುತ್ತಿಷ್ಠ ಯಶೋ ಲಭಸ್ವ ಜಿತ್ವಾ ಶತ್ರೂನ್ ಭುಂಕ್ಷ್ವ ರಾಜ್ಯಂ ಸಮೃದ್ಧಮ್ ।

ಮಯ್ಯೈವೈತೇ ನಿಹತಾಃ ಪೂರ್ವಮೇವ ನಿಮಿತ್ತಮಾತ್ರಂ ಭವ ಸವ್ಯಸಾಚಿನ್ ॥೩೩॥

ತಸ್ಮಾತ್ ತ್ವಮ್ ಉತ್ತಿಷ್ಠ ಯಶಃ ಲಭಸ್ವ ಜಿತ್ವಾ ಶತ್ರೂನ್ ಭುಂಕ್ಷ್ವ ರಾಜ್ಯಮ್ ಸಮೃದ್ಧಮ್ ।

ಮಯಾ ಏವ ಏತೇ ನಿಹತಾಃ ಪೂರ್ವಮ್ ಏವ ನಿಮಿತ್ತ ಮಾತ್ರಮ್ ಭವ ಸವ್ಯಸಾಚಿನ್ –ಆದ್ದರಿಂದ ನೀನೆದ್ದು ನಿಲ್ಲು. ಹಗೆಗಳನ್ನು ಗೆದ್ದು ಹೆಸರು ಗಳಿಸು. ಅರಸೊತ್ತಿಗೆಯ ತುಂಬು ಸಿರಿಯನುಣ್ಣು. ನಾನೇ ಇವರನ್ನು ಈ ಮೊದಲೇ ಕೊಂದಾಗಿದೆ. ಓ ಸವ್ಯಸಾಚಿ(ಎಡದಿಂದಲೂ ಬಾಣ ಪ್ರಯೋಗಿಸಬಲ್ಲ ನಿಪುಣ ಯೋಧ) , ನೀನು ಬರಿಯ ನೆಪಮಾತ್ರನಾಗು

ಅರ್ಜುನನನ್ನು ಕೃಷ್ಣ ಹುರಿದುಂಬಿಸುತ್ತಿದ್ದಾನೆ. ಎದ್ದೇಳು, ಯುದ್ಧಕ್ಕೆ ಸಿದ್ಧನಾಗು. ಈ ಯುದ್ಧದಲ್ಲಿ ನೀನು ಗೆಲ್ಲುತ್ತೀಯ. ಈ ಶತ್ರುಗಳನ್ನು ಸಂಹಾರ ಮಾಡು. ಏಕೆಂದರೆ ನಾನು ಇವರನ್ನು ಈಗಾಗಲೇ ಕೊಂದಾಗಿದೆ. ಇಲ್ಲಿ ನೀನು ಕೇವಲ ನಿಮಿತ್ತ ಮಾತ್ರ. ನಿನ್ನ ಪಾಲಿಗೆ ಬಂದ ಕರ್ತವ್ಯವನ್ನು ನಿರ್ವಹಿಸಿ, ನಿನ್ನ ಪಾಲಿನ ಸುಖ ಪ್ರರಾಬ್ಧವನ್ನು ಅನುಭವಿಸು.

ದ್ರೋಣಂ ಚ ಭೀಷ್ಮಂ ಚ ಜಯದ್ರಥಂ ಚ ಕರ್ಣಂ ತಥಾSನ್ಯಾನಪಿ ಯೋಧವೀರಾನ್ ।
ಮಯಾ ಹತಾಂಸ್ತ್ವಂ ಜಹಿ ಮಾ ವ್ಯಥಿಷ್ಠಾ ಯುದ್ಧ್ಯಸ್ವ ಜೇತಾಸಿ ರಣೇ ಸಪತ್ನಾನ್ ॥೩೪॥

ದ್ರೋಣಂ ಚ ಭೀಷ್ಮಂ ಚ ಜಯದ್ರಥಂ ಚ ಕರ್ಣಂ ತಥಾ ಅನ್ಯಾನ್ ಅಪಿ ಯೋಧ ವೀರಾನ್ ।
ಮಯಾ ಹತಾನ್ ತ್ವಮ್ ಜಹಿ ಮಾ ವ್ಯಥಿಷ್ಠಾಃ ಯುದ್ಧ್ಯಸ್ವ ಜೇತಾ ಅಸಿ ರಣೇ ಸಪತ್ನಾನ್ – ನಾನೇ ಕೊಂದ ಇವರನ್ನು ನೀನು ಮುಗಿಸಿಬಿಡು: ದ್ರೋಣನನ್ನು, ಭೀಷ್ಮನನ್ನು, ಜಯದ್ರಥನನ್ನು ಮತ್ತು ಕರ್ಣನನ್ನು; ಹಾಗೆಯೇ ಬೇರೆ ವೀರ ಹೋರಾಳುಗಳನ್ನು ಕೂಡಾ. ಕಂಗೆಡಬೇಡ, ಹೋರಾಡು. ಕಾಳಗದಲ್ಲಿ ಹಗೆಗಳನ್ನು ಗೆಲ್ಲಲಿರುವೆ.

ಇಲ್ಲಿ ನೆರೆದಿರುವ ದ್ರೋಣ, ಭೀಷ್ಮ, ಜಯದ್ರಥ, ಕರ್ಣ, ಇವರೆಲ್ಲರ ಆಯುಸ್ಸನ್ನು ನಾನು ಹೀರಿದ್ದೇನೆ. ಆದ್ದರಿಂದ ನೀನು ಅದಕ್ಕಾಗಿ ದುಃಖಪಡುವ ಅಗತ್ಯವಿಲ್ಲ. ಈ ಜೀವನ ತರಂಗ ಅನಿವಾರ್ಯ. ಇದನ್ನು ಯಾರಿಂದಲೂ ತಡೆಯಲು ಸಾಧ್ಯವಿಲ್ಲ. ಆದ್ದರಿಂದ ಎದ್ದು ಹೋರಾಡು. ನೀನು ಈ ಧರ್ಮ ಯುದ್ಧದಲ್ಲಿ ಗೆಲ್ಲುವೆ. ನನ್ನ ರಕ್ಷೆಯ ಪೂರ್ಣ ಪ್ರಸಾದ ನಿನ್ನೊಂದಿಗಿದೆ-ಎಂದು ಕೃಷ್ಣ ಆಶೀರ್ವದಿಸುತ್ತಾನೆ.

ಮೊದಲು "ಸೇನಯೋರುಭಯೋರ್ಮಧ್ಯೇ ರಥಂ ಸ್ಥಾಪಯ ಮೇಚ್ಯುತ" ಎಂದು ಅಹಂಕಾರದಿಂದ ಮಾತನಾಡಿದ್ದ ಅರ್ಜುನ, ನಂತರ ತನ್ನ ಮುಂದೆ ನಿಂತಿರುವ ಹಿರಿಯರನ್ನು ಕಂಡು ಕುಗ್ಗಿ ಯುದ್ಧ ಬೇಡ ಎಂದು ನಿಂತು ಬಿಟ್ಟಿದ್ದ. ಈ ಎರಡೂ ಸ್ಥಿತಿ ಯಾವುದೇ ವಸ್ತುಸ್ಥಿತಿ ಇಲ್ಲದ ನಿರ್ಧಾರವಾಗಿತ್ತು. ಈ ಕಾರಣಕ್ಕಾಗಿ ಕೃಷ್ಣ ಈ ಹತ್ತು ಅಧ್ಯಾಯಗಳಲ್ಲಿ ಅರ್ಜುನನಿಗೆ ಉಪದೇಶ ಮಾಡಿ, ಯುದ್ಧ ಎನ್ನುವುದು 'ಧರ್ಮ' ಎನ್ನುವುದನ್ನು ಮನವರಿಕೆ ಮಾಡಿ ಕೊಟ್ಟ. ಈಗ ತನ್ನ ವಿಶ್ವರೂಪ ದರ್ಶನ ಕೊಟ್ಟು-"ನೀನು ಕೇವಲ ನಿಮಿತ್ತ ಮಾತ್ರ" ಎಂದು ಹೇಳಿದ. ಕೃಷ್ಣನ ಆ ಭಯಂಕರ ರೂಪ, ಮತ್ತು ಆತನ ಮಾತನ್ನು ಕೇಳಿ ಅರ್ಜುನ ಏನು ಮಾಡಿದ ಎನ್ನುವುದನ್ನು ಸಂಜಯ ಮುಂದಿನ ಶ್ಲೋಕದಲ್ಲಿ ವರ್ಣಿಸುತ್ತಾನೆ:

ಸಂಜಯ ಉವಾಚ ।
ಏತಚ್ಛ್ರುತ್ವಾ ವಚನಂ ಕೇಶವಸ್ಯ ಕೃತಾಂಜಲಿರ್ವೇಪಮಾನಃ ಕಿರೀಟೀ ।
ನಮಸ್ಕೃತ್ವಾ ಭೂಯ ಏವಾSಹ ಕೃಷ್ಣಂ ಸಗದ್ಗದಂ ಭೀತಭೀತಃ ಪ್ರಣಮ್ಯ ॥೩೫॥

ಸಂಜಯ ಉವಾಚ- ಸಂಜಯ ಹೇಳಿದನು:

ಏತತ್ ಶ್ರುತ್ವಾ ವಚನಮ್ ಕೇಶವಸ್ಯ ಕೃತಾಂಜಲಿ ವೇಪಮಾನಃ ಕಿರೀಟೀ ।

ನಮಸ್ಕೃತ್ವಾ ಭೂಯಃ ಏವ ಆಹ ಕೃಷ್ಣಮ್ ಸ ಗದ್ಗದಮ್ ಭೀತಭೀತಃ ಪ್ರಣಮ್ಯ—ಕೃಷ್ಣನ ಈ ಮಾತನ್ನಾಲಿಸಿದ ಅರ್ಜುನ ಕೈಮುಗಿದು ನಡುಗುತ್ತಾ ಪೊಡಮಟ್ಟು, ಗದ್ಗದಿಸುತ್ತಾ, ಅಳುಕುತ್ತಾ, ಮತ್ತೊಮ್ಮೆ ಮಣಿದು ಮತ್ತೆ ಕೃಷ್ಣನ ಮುಂದೆ ನುಡಿದನು.

ಕೃಷ್ಣನ ಮಾತನ್ನು ಕೇಳಿದ ಅರ್ಜುನ ಭಕ್ತಿಯಿಂದ ಭಗವಂತನಿಗೆ ಕೈ ಮುಗಿದ. ಈ ಸ್ಥಿತಿಯಲ್ಲಿ ಆತ ತತ್ತರಿಸಿ ನಡುಗುತ್ತಿದ್ದಾನೆ. ತನ್ನ ಸರ್ವಾಂಗದಿಂದ ಭಗವಂತನಿಗೆ ನಮಸ್ಕರಿಸಿ, ಗದ್ಗಿತನಾಗಿ ಮಾತನಾಡಿದ.

ಇಲ್ಲಿ ಸಂಜಯ ಭಗವಂತನನ್ನು 'ಕೇಶವ' ಮತ್ತು 'ಕೃಷ್ಣ' ಎಂದು ಸಂಬೋಧಿಸಿದ್ದಾನೆ. ಕೇಶವ ಎಂದರೆ ಜಗತ್ತಿನ ಸೃಷ್ಟಿ ಮತ್ತು ಸಂಹಾರದ ಮೂಲದಲ್ಲಿರುವ ಶಕ್ತಿಗಳಾದ ಬ್ರಹ್ಮ-ರುದ್ರರನ್ನು ಸೃಷ್ಟಿ-ಸಂಹಾರದಲ್ಲಿ ತೊಡಗಿಸಿ ನಿಯಂತ್ರಿಸುವವ. ಸಮಸ್ತ ಜೀವಜಾತದೊಳಗಿದ್ದು, ಅವರನ್ನು ನಿಯಂತ್ರಿಸುವ ಸರ್ವಾಂತರ್ಯಾಮಿ ಭಗವಂತ ಕೇಶವ. ಇನ್ನು 'ಕೃಷ್ಣ' ಎನ್ನುವುದು ಭಗವಂತನ ಮೂಲ ನಾಮ ಕೂಡಾ ಹೌದು. ನಮ್ಮ ಅಹಂಕಾರವನ್ನು, ಅಜ್ಞಾನವನ್ನು ಕರ್ಷಣೆ ಮಾಡುವ, ಇಡೀ ಲೋಕವನ್ನು ಆಕರ್ಷಣೆ ಮಾಡುವ ಭಗವಂತ, ಸಂಸಾರದಿಂದ ನಮ್ಮನ್ನು ಕರ್ಷಣೆ ಮಾಡುವ 'ಕೃಷ್ಣ'.

ಅರ್ಜುನ ಭಗವಂತನ ಅಪರಂಪಾರವಾದ ರೂಪ ಮತ್ತು ಆತನ ಶಕ್ತಿಯ ವಿವರಣೆಯನ್ನು ಕೃಷ್ಣನಿಂದ ಕೇಳಿ- ಭಗವಂತನನ್ನು ಭಕ್ತಿಯಿಂದ ಸ್ತುತಿಸಲು ಪ್ರಾರಂಭಿಸುತ್ತಾನೆ. ಮುಂದಿನ ಶ್ಲೋಕಗಳಲ್ಲಿ ಭಗವಂತನ ಅನಂತ ಗುಣವನ್ನು ಅರ್ಜುನ ಸ್ತುತಿಸುವುದನ್ನು ನಾವು ಕಾಣಬಹುದು. [ಇಲ್ಲಿ ಭಗವಂತನ ಗುಣವಿಶೇಷವನ್ನು ಹೇಳುವ ಅನೇಕ ವಿಶೇಷಣಗಳನ್ನು ಶ್ಲೋಕದಲ್ಲಿ ಬಳಸಲಾಗಿದೆ. ಉದಾಹರಣೆಗೆ: ಹೃಷೀಕೇಶಃ, ಅಕ್ಷರಃ, ಪುರುಷಃ, ಅನಂತವೀರ್ಯಃ, ಅಮಿತವಿಕ್ರಮಃ, ದೇವೇಶಃ, ಇತ್ಯಾದಿ. ಈ ಎಲ್ಲಾ ವಿಶೇಷಣಗಳ ಅರ್ಥವಿವರಣೆಯನ್ನು ನಾವು ಈ ಹಿಂದಿನ ಅಧ್ಯಾಯಗಳಲ್ಲಿ ಸಾಂದರ್ಭಿಕವಾಗಿ ಚರ್ಚಿಸಿರುವುದರಿಂದ ಇಲ್ಲಿ ಆ ಅರ್ಥ ವಿವರಣೆಯನ್ನು ಮರಳಿ ವಿವರಿಸಿಲ್ಲ. ನಾವು ವಿಷ್ಣುಸಹಸ್ರನಾಮದಲ್ಲಿ ಕೂಡಾ ಭಗವಂತನ ನಾಮವಾಗಿ ಈ ಪದಗಳು ಬಳಕೆಯಾಗಿರುವುದನ್ನು ಕಾಣುತ್ತೇವೆ. ಭಗವಂತನ ಒಂದೊಂದು ನಾಮದ ಹಿಂದೆ ಆತನ ಅನಂತ ಗುಣದ ಅನುಸಂಧಾನವಿದೆ. ಈ ವಿಚಾರವನ್ನು ತಿಳಿದು, ಪ್ರತೀ ಪದದ ಹಿಂದಿರುವ ಅರ್ಥಾನುಸಂಧಾನದೊಂದಿಗೆ ಈ ಶ್ಲೋಕವನ್ನು ನೋಡಿದಾಗ ಮಾತ್ರ ಅದರ ಹಿಂದಿರುವ ಸಂದೇಶದ ಅರಿವಾಗುತ್ತದೆ. ಮುಂದಿನ ಶ್ಲೋಕಗಳನ್ನು ನೋಡುವಾಗ ಓದುಗರು ಈ ವಿಚಾರವನ್ನು ಗಮನದಲ್ಲಿಟ್ಟುಕೊಂಡು ಓದಬೇಕಾಗಿ ಪ್ರಾರ್ಥನೆ.]

ಅರ್ಜುನ ಉವಾಚ ।

ಸ್ಥಾನೇ ಹೃಷೀಕೇಶ ತವ ಪ್ರಕೀರ್ತ್ಯಾ ಜಗತ್ ಪ್ರಹೃಷ್ಯತ್ಯನುರಜ್ಯತೇ ಚ ।
ರಕ್ಷಾಂಸಿ ಭೀತಾನಿ ದಿಶೋ ದ್ರವಂತಿ ಸರ್ವೇ ನಮಸ್ಯಂತಿ ಚ ಸಿದ್ಧಸಂಘಾಃ ॥೩೬॥

ಅರ್ಜುನಃ ಉವಾಚ-ಅರ್ಜುನ ಹೇಳಿದನು:
ಸ್ಥಾನೇ ಹೃಷೀಕೇಶ ತವ ಪ್ರಕೀರ್ತ್ಯಾ ಜಗತ್ ಪ್ರಹೃಷ್ಯತಿ ಅನುರಜ್ಯತೇ ಚ।
ರಕ್ಷಾಂಸಿ ಭೀತಾನಿ ದಿಶಾಃ ದ್ರವಂತಿ ಸರ್ವೇ ನಮಸ್ಯಂತಿ ಚ ಸಿದ್ಧಸಂಘಾಃ –ಇಂದ್ರಿಯಗಳ ದೊರೆಯೇ, ಎಲ್ಲಾ ಸರಿಯೆ: ಜಗತ್ತು ನಿನ್ನ ಕೊಂಡಾಟದಿಂದ ಹಿಗ್ಗುತ್ತಿದೆ; ಒಲಿಯುತ್ತಿದೆ. ರಕ್ಕಸರು ದಿಕ್ಕೆಟ್ಟು ಓಡುತ್ತಿದ್ದಾರೆ. ಸಿದ್ಧರೆಲ್ಲಾ ಗುಂಪುಗೂಡಿ ಪೊಡಮಡುತ್ತಿದ್ದಾರೆ.

ಈ ಹಿಂದೆ ಹೇಳಿದಂತೆ-ಅರ್ಜುನನಿಗೆ ವಿಶ್ವರೂಪ ದರ್ಶನವಾದಾಗ, ಇಡೀ ವಿಶ್ವದಲ್ಲಿ ಅನೇಕ ಮಂದಿ ಜ್ಞಾನಿಗಳಿಗೆ, ದೇವತೆಗಳಿಗೆ ಕೂಡಾ ಈ ಅಪರೂಪದ ಭಗವಂತನ ರೂಪ ದರ್ಶನವಾಗಿದೆ. ಅರ್ಜುನ ತನ್ನ ಅಂತರಂಗದಲ್ಲಿ ತನಗೆ ಕಾಣುತ್ತಿರುವ ವಿಚಾರವನ್ನು ಹೇಳುತ್ತಿದ್ದಾನೆ. ಇಷ್ಟೇ ಅಲ್ಲದೆ ಬಾಹ್ಯ ವಸ್ತುಸ್ಥಿತಿ ಕೂಡಾ ಆತನಿಗೆ ಭಗವಂತನಲ್ಲಿ ಕಾಣಿಸುತ್ತಿದೆ. ಅದನ್ನು ಅರ್ಜುನ ಇಲ್ಲಿ ವಿವರಿಸುತ್ತಿದ್ದಾನೆ- "ಋಷಿಗಳು, ಜ್ಞಾನಿಗಳು ನಿನ್ನ ಗುಣಗಾನ ಮಾಡುತ್ತಿದ್ದಾರೆ. ನಿನ್ನನ್ನು ಕೊಂಡಾಡಿ ರೋಮಾಂಚನಗೊಳ್ಳುತ್ತಿದ್ದಾರೆ. ದುಷ್ಟಶಕ್ತಿಗಳು ನಿನ್ನನ್ನು ಕಂಡು ಹೆದರಿ ಓಡುತ್ತಿವೆ. ಸಾತ್ವಿಕರು ಸಿದ್ಧರು ಕುಣಿದು ಕುಪ್ಪಳಿಸುತ್ತಿದ್ದಾರೆ. ಇದೆಲ್ಲವೂ ಯುಕ್ತವೇ ಸರಿ.

ಕಸ್ಮಾಚ್ಚ ತೇ ನ ನಮೇರನ್ ಮಹಾತ್ಮನ್ ಗರೀಯಸೇ ಬ್ರಹ್ಮಣೋಽಪ್ಯಾದಿಕರ್ತ್ರೇ ।
ಅನಂತ ದೇವೇಶ ಜಗನ್ನಿವಾಸ ತ್ವಮಕ್ಷರಂ ಸದಸತ್ ತತ್ಪರಂ ಯತ್ ॥೩೭॥

ಕಸ್ಮಾತ್ ಚ ತೇ ನ ನಮೇರನ್ ಮಹಾತ್ಮನ್ ಗರೀಯಸೇ ಬ್ರಹ್ಮಣಃ ಅಪಿ ಆದಿಕರ್ತ್ರೇ ।
ಅನಂತ ದೇವೇಶ ಜಗನ್ನಿವಾಸ ತ್ವಮ್ ಅಕ್ಷರಮ್ ಸತ್ ಅಸತ್ ತತ್ಪರಮ್ ಯತ್ –ಓ ಮಹಾತ್ಮನೇ, ಅವರೇಕೆ ಪೊಡಮಡದೇ ಇದ್ದಾರು ನಿನಗೆ; ಬ್ರಹ್ಮನಿಗೂ ಹಿರಿಯನಿಗೆ; ಮೊಟ್ಟ ಮೊದಲ ತಂದೆಗೆ. ಓ ಕೊನೆಯಿರದವನೇ, ಸಗ್ಗಿಗರೊಡೆಯನೇ, ಜಗದ ಆಸರೆಯೇ, ನೀನು ಅಳಿವಿರದವನು. ಕಾಣುವ, ಕಾಣದ ವಿಶ್ವದೊಳಗಿದ್ದು ಅದರಾಚೆಗಿರುವವನು.

ನಿನ್ನನ್ನು ತಿಳಿದವರು ನಿನಗೆ ನಮಸ್ಕಾರ ಮಾಡದೇ ಇರಲು ಸಾಧ್ಯವೇ ಇಲ್ಲ. ನೀನು ಪರಿಪೂರ್ಣವಾದ ಆತ್ಮ. ಈ ಜಗತ್ತಿನ ತಂದೆಯಾದ ಆ ಚತುರ್ಮುಖನಿಗೂ ನೀನು ತಂದೆ. ಇಂತಹ ನಿನಗೆ ನಮಸ್ಕರಿಸದೇ ಇರಲು ಸಾಧ್ಯವಿಲ್ಲ. ನೀನು ದೇಶ, ಕಾಲ ಮತ್ತು ಗುಣಗಳಿಂದ ಅನಂತ. ನೀನು ಎಲ್ಲರ ಒಳಗೂ ಹೊರಗೂ ತುಂಬಿ ನಿಂತಿರುವ ಜಗನ್ನಿವಾಸ; ನೀನು ನಿರ್ದಿಷ್ಟ ಹಾಗೂ ದೋಷ ರಹಿತ ಜ್ಞಾನಾನಂದಮೂರ್ತಿ(ಸತ್). ಅವ್ಯಕ್ತಮೂರ್ತಿಯಾದ ನಿನ್ನನ್ನು (ಅಸತ್) ಹೊರಗಣ್ಣಿನಿಂದ ಕಾಣಲಾರೆವು. ನೀನು ಅಕ್ಷರಃ, ನೀನು ದೇವೇಶಃ, ನೀನು ಕಾರಣಗಳಿಗೂ ಕಾರಣ, ನೀನು ಜಗದ ಆಸರೆ.

ತ್ವಮಾದಿದೇವಃ ಪುರುಷಃ ಪುರಾಣಃ ತ್ವಮಸ್ಯ ವಿಶ್ವಸ್ಯ ಪರಂ ನಿಧಾನಮ್ ।
ವೇತ್ತಾಽಸಿ ವೇದ್ಯಂ ಚ ಪರಂ ಚ ಧಾಮ ತ್ವಯಾ ತತಂ ವಿಶ್ವಮನಂತರೂಪ ॥೩೮॥

ತ್ವಮ್ ಆದಿದೇವಃ ಪುರುಷಃ ಪುರಾಣಃ ತ್ವಮ್ ಅಸ್ಯ ವಿಶ್ವಸ್ಯ ಪರಮ್ ನಿಧಾನಮ್ ।
ವೇತ್ತಾ ಅಸಿ ವೇದ್ಯಮ್ ಚ ಪರಮ್ ಚ ಧಾಮ ತ್ವಯಾ ತತಮ್ ವಿಶ್ವಮ್ ಅನಂತರೂಪ -ನೀನು ದೇವತೆಗಳಿಗೂ ಮೊದಲಿಗೆ. ಪುರಾಣಪುರುಷ. ನೀನು ಈ ಜಗದ ಹಿರಿಯಾಸರೆ. ಎಲ್ಲವನ್ನೂ ತಿಳಿದವನು. ಎಲ್ಲರೂ ತಿಳಿಯಬೇಕಾದವನು. ಹಿರಿಯ ಬೆಳಕು. ಓ ಅನಂತರೂಪನೇ, ಇಡಿಯ ವಿಶ್ವ ನಿನ್ನಿಂದ ತುಂಬಿದೆ.

ನೀನು ಆದಿದೇವಃ, ನೀನು ಪುರಾಣಪುರುಷಃ, ಈ ಜಗತ್ತಿನಲ್ಲಿ ಕೊನೆಯಾಸರೆ ನೀನು. ಎಲ್ಲರೂ ತಿಳಿಯಬೇಕಾದವನು, ಎಲ್ಲವನ್ನೂ ತಿಳಿದ ನೀನು ಎಲ್ಲವನ್ನೂ ಮೀರಿದ ಪರಂಧಾಮ. ಅನಂತರೂಪನಾದ ನೀನು ಇಡೀ ವಿಶ್ವವನ್ನು ವ್ಯಾಪಿಸಿ ನಿಂತಿದ್ದೀಯ.

ವಾಯುರ್ಯಮೋಽಗ್ನಿರ್ವರುಣಃ ಶಶಾಂಕಃ ಪ್ರಜಾಪತಿಸ್ತ್ವಂ ಪ್ರಪಿತಾಮಹಶ್ಚ ।
ನಮೋ ನಮಸ್ತೇಽಸ್ತು ಸಹಸ್ರಕೃತ್ವಃ ಪುನಶ್ಚ ಭೂಯೋಽಪಿ ನಮೋ ನಮಸ್ತೇ ॥೩೯॥

ವಾಯುಃ ಯಮಃ ಅಗ್ನಿಃ ವರುಣಃ ಶಶಾಂಕಃ ಪ್ರಜಾಪತಿಃ ತ್ವಮ್ ಪ್ರಪಿತಾಮಹಃ ಚ ।
ನಮಃ ನಮಃ ತೇ ಅಸ್ತು ಸಹಸ್ರಕೃತ್ವಃ ಪುನಃ ಚ ಭೂಯಃ ಅಪಿ ನಮಃ ನಮಃ ತೇ -ವಾಯು, ಯಮ, ಅಗ್ನಿ, ವರುಣ, ಚಂದ್ರ, ಪ್ರಜಾಪತಿ ಎಲ್ಲಾ ನೀನೆ. [ವ=ಬಲರೂಪ, ಆಯಾ=ಜ್ಞಾನರೂಪ. ಆದ್ದರಿಂದ 'ವಾಯು'. ಎಲ್ಲವನ್ನು ನಿಯಮಿಸುವುದರಿಂದ 'ಯಮ'. ಅಗ=ಚಲನೆ ಇಲ್ಲದ ವಿಶ್ವಕ್ಕೆ, ನಿ=ಚಲನೆ ನೀಡುವುದರಿಂದ 'ಅಗ್ನಿ'. ಭಕ್ತರನ್ನು ವರಣ ಮಾಡುವುದರಿಂದ ವರುಣಃ. ಶಶ=ಮಿಗಿಲಾದ ಆನಂದದಿಂದ ಅಂಕ=ಅಂಕಿತನಾದ್ದರಿಂದ 'ಶಶಾಂಕ'. ಪ್ರಜಾ=ಪ್ರಜೆಗಳ, ಪತಿ=ಪಾಲಕನಾದ್ದರಿಂದ 'ಪ್ರಜಾಪತಿ'.] ನೀನೇ ಜಗದ ಮುತ್ತಜ್ಜ. ಸಾವಿರಬಾರಿ ನಿನಗೆ ನಮೋನಮೋ ಎಂದು ಮಣಿವೆ. ಮತ್ತೊಮ್ಮೆ ಮಗದೊಮ್ಮೆ ನಿನಗೆ ವಂದನೆ; ವಂದನೆ.

ನೀನು ವಾಯುಃ, ಯಮಃ, ವರುಣಃ, ಶಶಾಂಕಃ, ಪ್ರಜಾಪತಿಃ. ನೀನು ಜಗದ ಮುತ್ತಜ್ಜ. ನಿನಗೆ ಸಹಸ್ರ ಬಾರಿ ವಂದನೆ.

ನಮಃ ಪುರಸ್ತಾದಥ ಪೃಷ್ಠತಸ್ತೇ ನಮೋಽಸ್ತು ತೇ ಸರ್ವತ ಏವ ಸರ್ವ ।
ಅನಂತವೀರ್ಯಾಮಿತವಿಕ್ರಮಸ್ತ್ವಂ ಸರ್ವಂ ಸಮಾಪ್ನೋಷಿ ತತೋಽಸಿ ಸರ್ವಃ ॥೪೦॥

ನಮಃ ಪುರಸ್ತಾತ್ ಅಥ ಪೃಷ್ಠತಃ ತೇ ನಮಃ ಅಸ್ತು ತೇ ಸರ್ವತಃ ಏವ ಸರ್ವ ।
ಅನಂತವೀರ್ಯ ಅಮಿತವಿಕ್ರಮಃ ತ್ವಮ್ ಸರ್ವಮ್ ಸಮಾಪ್ನೋಷಿ ತತಃ ಅಸಿ ಸರ್ವಃ -ಮುಂಗಡ ನಿನಗೆ ವಂದನೆ. ಮತ್ತೆ ಬೆಂಗಡೆ ನಿನಗೆ ವಂದನೆ. ಓ, ಎಲ್ಲೆಡೆ ಇರುವವನೇ, ಎಲ್ಲಾ ಕಡೆ ನಿನಗೆ ವಂದನೆ. ನೀನು ಎಲ್ಲೆಯಿರದ ಬೀರದವನು.ಅಳತೆಯಿರದ ಅಳವಿನವನು. ಎಲ್ಲೆಡೆಯೂ ತುಂಬಿರುವೆ. ಅದಕ್ಕೆಂದು ನೀನೇ ಎಲ್ಲಾ.

ಭಗವಂತನ ವಿಶ್ವರೂಪದಲ್ಲಿ ಆತನ ಮುಂಭಾಗ ಯಾವುದು ಹಿಂಭಾಗ ಯಾವುದು ಎಂದು ಹೇಗೆ ಗುರುತಿಸುವುದು. ಇದು ಅಸಾಧ್ಯ. ಅದಕ್ಕಾಗಿ ಅರ್ಜುನ ಹೇಳುತ್ತಾನೆ: ನಿನಗೆ ಎದುರಿನಿಂದ ನಮಸ್ಕಾರ, ನಿನ್ನ ಬೆಂಭಾಗದಿಂದ ನಮಸ್ಕಾರ, ಎಲ್ಲೆಡೆ ತುಂಬಿರುವ ನಿನಗೆ ಎಲ್ಲೆಡೆಯಿಂದ ನಮಸ್ಕಾರ. ನೀನು ಅನಂತವೀರ್ಯಃ. ನೀನು ಅಮಿತವಿಕ್ರಮಃ. ಓ ಸರ್ವನೇ, ನಿನಗೆ ನಮಸ್ಕಾರ. ಜಗತ್ತಿನ ಸಮಸ್ತಜೀವ ಜಾತದ ಸೃಷ್ಟಿಗೆ ಕಾರಣವಾಗಿ ಎಲ್ಲೆಡೆ ತುಂಬಿರುವ ಜಗತ್ತಿನ ನಿಯಾಮಕನಾದ ಈ ಅನಂತ ಶಕ್ತಿಗೆ ನಮಸ್ಕಾರ. ಎಲ್ಲವೂ ನೀನೇ.

ಸಖೇತಿ ಮತ್ವಾ ಪ್ರಸಭಂ ಯದುಕ್ತಂ ಹೇ ಕೃಷ್ಣ ಹೇ ಯಾದವ ಹೇ ಸಖೇತಿ ।
ಅಜಾನತಾ ಮಹಿಮಾನಂ ತವೇದಂ ಮಯಾ ಪ್ರಮಾದಾತ್ ಪ್ರಣಯೇನ ವಾಽಪಿ ॥೪೧॥

ಯಚ್ಚಾಪಹಾಸಾರ್ಥಮಸತ್ ಕೃತೋಽಸಿ ವಿಹಾರಶಯ್ಯಾಸನಭೋಜನೇಷು ।
ಏಕೋಽಥವಾಽಪ್ಯಚ್ಯುತ ತತ್ ಸಮಕ್ಷಂ ತತ್ ಕ್ಷಾಮಯೇ ತ್ವಾಮಹಮಪ್ರಮೇಯಮ್ ॥೪೨॥

ಸಖಾ ಇತಿ ಮತ್ವಾ ಪ್ರಸಭಮ್ ಯತ್ ಉಕ್ತಮ್ ಹೇ ಕೃಷ್ಣ ಹೇ ಯಾದವ ಹೇ ಸಖೇ ಇತಿ ।
ಅಜಾನತಾ ಮಹಿಮಾನಮ್ ತವ ಇದಮ್ ಮಯಾ ಪ್ರಮಾದಾತ್ ಪ್ರಣಯೇನ ವಾಽಪಿ ॥
ಯತ್ ಚ ಅವಹಾಸ ಅರ್ಥಮ್ ಅಸತ್ ಕೃತಃ ಅಸಿ ವಿಹಾರ ಶಯ್ಯಾ ಆಸನ ಭೋಜನೇಷು ।
ಏಕಃ ಅಥವಾ ಅಪಿ ಅಚ್ಯುತ ತತ್ ಸಮಕ್ಷಮ್ ತತ್ ಕ್ಷಾಮಯೇ ತ್ವಾಮ್ ಅಹಮ್ ಅಪ್ರಮೇಯಮ್ –ನಿನ್ನ ಹಿರಿಮೆಯನ್ನು ಅರಿಯದೆ ಗೆಳೆಯನೆಂದು ತಿಳಿದು ದುಡುಕಿ ನುಡಿದದ್ದುಂಟು. ನನ್ನ ಎಡವಿನಿಂದ ಅಥವಾ ಸಲಿಗೆಯಿಂದ- "ಏ ಕೃಷ್ಣ, ಏ ಗೆಳೆಯ" ಎಂದು ಕರೆದದ್ದುಂಟು. ವಿಹಾರದಲ್ಲಿದ್ದಾಗ, ಮಲಗಿದ್ದಾಗ, ಕೂತಾಗ, ಊಟಮಾಡುವಾಗ- ಎಲ್ಲಾ ಮಾಡಿಸುವ ನಿನ್ನನ್ನು ಅಣಕಕ್ಕಾಗಿ ಕಡೆಗಣಿಸಿದ್ದುಂಟು. ಆದ್ದರಿಂದ ಓ ಕುಗ್ಗದ ಎತ್ತರವೇ, ತಿಳಿವಿಗೆಟುಕದ, ಸಾಟಿಯಿರದ ನಿನ್ನೆದುರು ಬೇಡಿಕೊಳ್ಳುತ್ತಿದ್ದೇನೆ-ಅದನ್ನೆಲ್ಲಾ ಮರೆತು ಮನ್ನಿಸುವಂತೆ.

ಅರ್ಜುನನಿಗೆ ತಾನು ಹಿಂದೆ ಕೃಷ್ಣನೊಂದಿಗೆ ನಡೆದುಕೊಂಡ ರೀತಿ ಬಗ್ಗೆ ಪಶ್ಚಾತ್ತಾಪವಾಗುತ್ತದೆ. ಕೃಷ್ಣ ಜಗತ್ತಿನ ಮೂಲಶಕ್ತಿ ಎನ್ನುವ ಕಲ್ಪನೆ ಇಲ್ಲದೆ ತಾನು ನಡೆದುಕೊಂಡ ರೀತಿ ಬಗ್ಗೆ ಆತ ಕೃಷ್ಣನಲ್ಲಿ ಕ್ಷಮೆ ಬೇಡುತ್ತಾನೆ. ತಿಳಿದೋ ತಿಳಿಯದೆಯೋ, ಬೇಜವಾಬ್ಧಾರಿಯಿಂದಲೋ ಅಥವಾ ಪ್ರೀತಿಯಿಂದಲೋ ಮಾಡಿದ ತಪ್ಪುಗಳನ್ನು ಕ್ಷಮಿಸು ಎಂದು ಆತ ಭಗವಂತನಲ್ಲಿ ಬೇಡುತ್ತಾನೆ. ಇಲ್ಲಿ ಬಂದಿರುವ 'ಏಕ' ಎನ್ನುವ ಪದಕ್ಕೆ ವಿಶೇಷ ಅರ್ಥವಿದೆ. ಏಕಃ ಎಂದರೆ ಸರ್ವೋತ್ತಮ ಮತ್ತು ಸರ್ವಕರ್ತ(ಏಷ ಏವ ಕರೋತಿ-ಏಕಃ). ಸರ್ವಕರ್ತ-ಸರ್ವೋತ್ತಮನಾದ ನಿನ್ನನ್ನು ಪರಿಹಾಸ್ಯ ಮಾಡಿ ಸಲುಗೆಯಿಂದ ಮಾತನಾಡಿದೆ, ನೀನು ಅಚ್ಯುತಃ. ನಿನ್ನ ಸಾಮರ್ಥ್ಯ, ಗುಣ, ದೇಹದಲ್ಲಿ ಚ್ಯುತಿ ಇಲ್ಲ. ಚ್ಯುತವಾದ ನನ್ನ ಬುದ್ಧಿಯಿಂದ ಇದನ್ನು ನಾನು ಗ್ರಹಿಸಲಿಲ್ಲ. ನಾನು ಈ ರೀತಿ ನೆಡೆದುಕೊಳ್ಳಬಾರದಿತ್ತು. ನಾನು ಮಾಡಿರುವ ಅಪರಾಧಕ್ಕೆ ನಿನ್ನ ಬಳಿ ಕ್ಷಮೆ ಬೇಡುತ್ತಿದ್ದೇನೆ. ನೀನು ಅಪ್ರಮೇಯ-ಕಾಲ-ದೇಶಗಳಿಂದ ವ್ಯಾಪ್ತನಾದ ನೀನು ನಮ್ಮ ಅರಿವಿಗೆ ಎಟುಕದವನು. ಈಗ ನನಗೆ ನನ್ನ ತಪ್ಪಿನ ಅರಿವಾಯಿತು. ಅಜ್ಞಾನದಿಂದ ತಪ್ಪು ಮಾಡುತ್ತಿದ್ದೇನೆ ಎನ್ನುವ ತಿಳುವಳಿಕೆ ಬಂತು.

ಪಿತಾಽಸಿ ಲೋಕಸ್ಯ ಚರಾಚರಸ್ಯ ತ್ವಮಸ್ಯ ಪೂಜ್ಯಶ್ಚ ಗುರುರ್ಗರೀಯಾನ್ ।
ನ ತ್ವತ್ ಸಮೋಽಸ್ತ್ಯಭ್ಯಧಿಕಃ ಕುತೋಽನ್ಯೋ ಲೋಕತ್ರಯೇಽಪ್ಯಪ್ರತಿಮಪ್ರಭಾವ ॥೪೩॥

ಪಿತಾ ಅಸಿ ಲೋಕಸ್ಯ ಚರ ಅಚರಸ್ಯ ತ್ವಮ್ ಅಸ್ಯ ಪೂಜ್ಯಃ ಚ ಗುರುಃ ಗರೀಯಾನ್ ।
ನ ತ್ವತ್ ಸಮಃ ಅಸ್ತಿ ಅಭ್ಯಧಿಕಃ ಕುತಃ ಅನ್ಯಃ ಲೋಕತ್ರಯೇ ಅಪಿ ಅಪ್ರತಿಮ ಪ್ರಭಾವ -ಈ ಚರಾಚರದ ಜಗದ ತಂದೆ ನೀನು. ಆರಾಧನೆಯ ಕೇಂದ್ರ. ಗುರುವಿಗೂ ಹಿರಿಯ ಗುರು. ಜೋಡಿಯಿರದ ಹಿರಿಮೆಯೇ, ಮೂರು ಲೋಕದಲ್ಲೂ ನಿನಗೆ ಸಾಟಿ ಇಲ್ಲ. ಬೇರೆ ಮಿಗಿಲು ಮತ್ತೆಲ್ಲಿ?

ಎಲ್ಲರನ್ನೂ ಸೃಷ್ಟಿಸಿದವ, ಎಲ್ಲರನ್ನೂ ಪಾಲಿಸುವ ನೀನು ಜಗದ ತಂದೆ. ಜಗದ ಗುರುವಾದ ನಿನ್ನನ್ನು ನಾನು ತೀರಾ ಸಲುಗೆಯಿಂದ ಕಂಡೆ. ನಿನಗೆ ಸಾಟಿಯಾದವರು ಇನ್ನೊಬ್ಬರಿಲ್ಲ. ನಿನ್ನನ್ನು ಹೋಲಿಸುವ ಇನ್ನೊಂದು ದೃಷ್ಟಾಂತವಿಲ್ಲ.  ಇಡೀ ಜಗತ್ತಿನಲ್ಲಿ ನಿನ್ನನ್ನು ಮೀರಿಸುವ ಇನ್ನೊಂದು ಶಕ್ತಿ ಇಲ್ಲ. [ಇಲ್ಲಿ ಮೂರು ಲೋಕಗಳು ಎಂದರೆ ಭೂಮಿಯಿಂದ ಕೆಳಗಿರುವ ಲೋಕಗಳ ಒಂದು ಗುಂಪು, ಭೂಲೋಕ ಮತ್ತು ಭೂಮಿಯಿಂದ ಮೇಲಿರುವ ಲೋಕಗಳ ಗುಂಪು.] ನೀನು ಎಲ್ಲಾ ಕಾರಣಗಳ ಕಾರಣ. ನಿನಗಿಂತ ಮಿಗಿಲು ಇನ್ನೆಲ್ಲಿ?

ತಸ್ಮಾತ್ ಪ್ರಣಮ್ಯ ಪ್ರಣಿಧಾಯ ಕಾಯಂ ಪ್ರಸಾದಯೇ ತ್ವಾಮಹಮೀಶಮೀಡ್ಯಮ್ ।
ಪಿತೇವ ಪುತ್ರಸ್ಯ ಸಖೇವ ಸಖ್ಯುಃ ಪ್ರಿಯಃ ಪ್ರಿಯಾಯಾರ್ಹಸಿ ದೇವ ಸೋಢುಮ್ ॥೪೪॥

ತಸ್ಮಾತ್ ಪ್ರಣಮ್ಯ ಪ್ರಣಿಧಾಯ ಕಾಯಮ್  ಪ್ರಸಾದಯೇ ತ್ವಾಮ್ ಅಹಮ್ ಈಶಮ್ ಈಡ್ಯಮ್ ।
ಪಿತಾ ಇವ ಪುತ್ರಸ್ಯ ಸಖಾ ಇವ ಸಖ್ಯುಃ ಪ್ರಿಯಃ ಪ್ರಿಯಾಯಾಃ ಅರ್ಹಸಿ ದೇವ ಸೋಢುಮ್ -ಆದ್ದರಿಂದ, ಎಲ್ಲರೂ ಹೊಗಳುವ, ಎಲ್ಲರ ದೊರೆಯಾದ ನಿನ್ನೆದುರು ಮೈಚೆಲ್ಲಿ, ಕಾಲಿಗೆರಗಿ ಒಲ್ಮೈಸುತ್ತಿದ್ದೇನೆ: ಓ ದೇವ, ನನ್ನ ಮೆಚ್ಚಿನ ನೀನು ನಿನ್ನ ಮೆಚ್ಚಿನ ನನಗಾಗಿ ನನ್ನ ತಪ್ಪುಗಳನ್ನು ಮನ್ನಿಸಬೇಕು. ತಂದೆ-ಮಗನ ತಪ್ಪನ್ನು, ಗೆಳೆಯ-ಗೆಳೆಯನ ತಪ್ಪನ್ನು ಮನ್ನಿಸುವಂತೆ.

ನಿನ್ನೆದುರು  ನಿಲ್ಲಲಾಗುತ್ತಿಲ್ಲ. ಮೈಚೆಲ್ಲಿ ಹೊರಳಾಡಬೇಕು ಎನ್ನಿಸುತ್ತಿದೆ. ಎಲ್ಲರಿಂದ ಸ್ತುತನಾದ ನಿನ್ನಲ್ಲಿ ಬೇಡಿಕೊಳ್ಳುತ್ತಿದ್ದೇನೆ. ಮಗ ಮಾಡಿದ ತಪ್ಪನ್ನು ತಂದೆ ಕ್ಷಮಿಸುವಂತೆ, ಗೆಳೆಯನ ತಪ್ಪನ್ನು ಗೆಳೆಯ ಕ್ಷಮಿಸುವಂತೆ, ಜಗದ ತಂದೆಯಾದ ನೀನು, ಜಗತ್ತಿನ ಎಲ್ಲರ ಅಂತಃಕರಣದ  ಮಿತ್ರನಾದ ನೀನು,  ನನ್ನನ್ನು ಕ್ಷಮಿಸು.

ಅದೃಷ್ಟಪೂರ್ವಂ ಹೃಷಿತೋಽಸ್ಮಿ ದೃಷ್ಟ್ವಾ ಭಯೇನ ಚ ಪ್ರವ್ಯಥಿತಂ ಮನೋ ಮೇ
ತದೇವ ಮೇ ದರ್ಶಯ ದೇವ ರೂಪಂ ಪ್ರಸೀದ ದೇವೇಶ ಜಗನ್ನಿವಾಸ  ॥೪೫॥

ಅದೃಷ್ಟ ಪೂರ್ವಮ್ ಹೃಷಿತಃ ಅಸ್ಮಿ ದೃಷ್ಟ್ವಾ ಭಯೇನ ಚ ಪ್ರವ್ಯಥಿ ತಮ್ ಮನಃ ಮೇ।
ತತ್ ಏವ ಮೇ ದರ್ಶಯ ದೇವ ರೂಪಮ್ ಪ್ರಸೀದ ದೇವೇಶ ಜಗನ್ನಿವಾಸ -ಹಿಂದೆಂದೂ ಕಂಡರಿಯದ ರೂಪವನ್ನು ಕಂಡು ಸಡಗರಪಟ್ಟಿದ್ದೇನೆ; ಕಂಡು ಗಾಬರಿಗೊಂಡು ಬಗೆಗೆಟ್ಟಿದ್ದೇನೆ ಕೂಡಾ. ಓ ಸಗ್ಗಿಗರ ದೊರೆಯೇ, ಓ ಜಗದ ಆಸರೆಯೇ, ದಯೆದೋರು. ಓ ದೇವ, ನನಗೆ ಅದೇ ರೂಪವನ್ನು ತೋರು.

ಎಂದೂ ಕಾಣದ ಈ ನಿನ್ನ ಅದ್ಭುತ ರೂಪವನ್ನು ಕಂಡು ಖುಷಿ ಪಟ್ಟಿದ್ದೇನೆ. ಆದರೆ ಇಡೀ ಜಗತ್ತನ್ನು ಸಂಹಾರ ಮಾಡುವ ನಿನ್ನ ಉಗ್ರ ರೂಪವನ್ನು ಕಂಡು ಭಯವಾಗುತ್ತಿದೆ. ಒಂದು ಕಡೆ ಆನಂದ ಮತ್ತು ಇನ್ನೊಂದು ಕಡೆ ದಿಗಿಲು. ಇದರಿಂದ ನಾನು ಕಂಗಾಲಾಗಿದ್ದೇನೆ. ಅದಕ್ಕಾಗಿ ಆ ನಿನ್ನ 'ಕೃಷ್ಣ' ರೂಪವನ್ನು ತೋರು.

ಕಿರೀಟಿನಂ ಗದಿನಂ ಚಕ್ರಹಸ್ತಂ ಇಚ್ಛಾಮಿ ತ್ವಾಂ ದ್ರಷ್ಟುಮಹಂ ತಥೈವ ।
ತೇನೈವ ರೂಪೇಣ ಚತುರ್ಭುಜೇನ ಸಹಸ್ರ ಬಾಹೋ ಭವ ವಿಶ್ವಮೂರ್ತೇ॥೪೬॥

ಕಿರೀಟಿನಮ್ ಗದಿನಮ್ ಚಕ್ರಹಸ್ತಮ್ ಇಚ್ಛಾಮಿ ತ್ವಾಮ್ ದ್ರಷ್ಟುಮ್ ಅಹಮ್ ತದಾ ಏವ।
ತೇನ ಏವ ರೂಪೇಣ ಚತುಃ ಭುಜೇನ ಸಹಸ್ರ ಬಾಹೋ ಭವ ವಿಶ್ವಮೂರ್ತೇ—ಮುಕುಟವಿಟ್ಟ, ಕೈಯಲ್ಲಿ ಗದೆ-ಚಕ್ರ ತೊಟ್ಟ ನಿನ್ನನ್ನು ಆ ರೂಪದಲ್ಲೇ ಕಾಣಬಯಸುತ್ತೇನೆ. ಸಾವಿರ ತೋಳಿನ ವಿಶ್ವರೂಪನೇ, ಮತ್ತೊಮ್ಮೆ ನಾಲ್ಕು ತೋಳಿನ ಅದೇ ರೂಪದಿಂದ ಕಾಣಿಸಿಕೋ.

"ನೀನು ಹಿಂದೆ ಕಾಣಿಸಿಕೊಂಡಂತೆ ಚತುರ್ಭುಜನಾಗಿ, ಕಿರೀಟ ಧರಿಸಿದ ಗದಾ-ಚಕ್ರ ಹಿಡಿದಿರುವ ನಿನ್ನ ರೂಪವನ್ನು ತೋರು" ಎಂದು ಅರ್ಜುನ ಸಹಸ್ರ ತೋಳಿನ ವಿಶ್ವರೂಪಿ ಭಗವಂತನಲ್ಲಿ ಕೈಜೋಡಿಸಿ ಬೇಡಿಕೊಳ್ಳುತ್ತಾನೆ. ಇಲ್ಲಿ ಅರ್ಜುನ ಕೃಷ್ಣನಲ್ಲಿ -"ನಿನ್ನ ಚತುರ್ಭುಜ ರೂಪವನ್ನು ತೋರು" ಎಂದಿದ್ದಾನೆ. ಕೃಷ್ಣ ತನ್ನ ಅಂತರಂಗದ ಭಕ್ತರಿಗೆ ತನ್ನ ಚತುರ್ಭುಜ ರೂಪವನ್ನು ತೋರಿದ್ದ. ಇದನ್ನು ಅರ್ಜುನ ಕೂಡಾ ನೋಡಿದ್ದಾನೆ. ಭಾಗವತದಲ್ಲಿ-ಬಾಲಕನಾಗಿದ್ದಾಗ ಕೃಷ್ಣ ತನ್ನ ಚತುರ್ಭುಜ ರೂಪವನ್ನು ತೋರಿದ್ದ ಎನ್ನುವುದನ್ನು ಹೀಗೆ ಹೇಳಿದ್ದಾರೆ:

ತಮದ್ಭುತಂ ಬಾಲಕಮಂಬುಜೇಕ್ಷಣಂ ಚತುರ್ಭುಜಂ ಶಂಖಗದಾದ್ಯುದಾಯುಧಂ,
ಶ್ರೀವತ್ಸಲಕ್ಷ್ಮಂ ಗಲಶೋಭಿಕೌಸ್ತುಭಂ ಪೀತಾಂಬರಂ ಸಾಂದ್ರಪಯೋದಸೌಭಗಂ ||೧೦.೦೩.೯||

ಸಾಮಾನ್ಯರು ಕಾಣದ ಭಗವಂತನ ಚತುರ್ಭುಜ ರೂಪವನ್ನು ಕೃಷ್ಣ ಕೆಲವರಿಗೆ ತೋರಿದ್ದ ಎನ್ನುವುದನ್ನು ಈ ಶ್ಲೋಕ ದೃಢಪಡಿಸುತ್ತದೆ. ಇಲ್ಲಿ ಅರ್ಜುನ ಭಗವಂತನಲ್ಲಿ ಆತನ ವಿಶ್ವರೂಪ ದರ್ಶನವನ್ನು ಕೊನೆಗೊಳಿಸಿ ತನಗೆ ಚತುರ್ಭುಜ ರೂಪವನ್ನು ತೋರಿಸು ಎಂದು ಬೇಡಿಕೊಳ್ಳುತ್ತಾನೆ.

ಇಲ್ಲಿ ನಾವು ತಿಳಿಯಬೇಕಾದ ಮುಖ್ಯ ವಿಚಾರ ಎಂದರೆ: ಭಗವಂತನ ವಿಶ್ವರೂಪದ ಉಪಾಸನೆ ಸಾಮಾನ್ಯರಾದ ನಮಗೆ ಅಸಾಧ್ಯ. ಆತನ ವಿಶ್ವರೂಪವನ್ನು ಮಹಾ ಜ್ಞಾನಿಯಾದ ಅರ್ಜುನನಿಂದಲೇ ನೋಡಿ ತಡೆದುಕೊಳ್ಳಲು ಆಗಿಲ್ಲ. ಹಾಗಿರುವಾಗ ನಾವು ಅದನ್ನು ನಮ್ಮ ಧ್ಯಾನದಲ್ಲಿ ಜೀರ್ಣಿಸಿಕೊಳ್ಳವುದು ಸಾಧ್ಯವೇ? ಈ ಕಾರಣಕ್ಕಾಗಿ ಧ್ಯಾನದಲ್ಲಿ ಭಗವಂತನ ವಿಶ್ವ ರೂಪವನ್ನು ಉಪಾಸನೆ ಮಾಡುವುದಕ್ಕಿಂತ, ಭಗವಂತನ ವಿಶ್ವ ಶಕ್ತಿಯ

ಎಚ್ಚರದಿಂದ ಆತನ ಅವತಾರ ರೂಪದಲ್ಲಿ ಆತನನ್ನು ಉಪಾಸನೆ ಮಾಡುವುದು ಶ್ರೇಯಸ್ಕರ. ಅರ್ಜುನನ ಈ ಬೇಡಿಕೆಯನ್ನು ಕೃಷ್ಣ ಹೇಗೆ ಪುರಸ್ಕರಿಸಿದ ಎನ್ನುವುದನ್ನು ಮುಂದಿನ ಶ್ಲೋಕಗಳಲ್ಲಿ ನೋಡೋಣ.

ಭಗವಾನುವಾಚ ।

ಮಯಾ ಪ್ರಸನ್ನೇನ ತವಾರ್ಜುನೇದಂ ರೂಪಂ ಪರಂ ದರ್ಶಿತಮಾತ್ಮಯೋಗಾತ್ ।
ತೇಜೋಮಯಂ ವಿಶ್ವಮನಂತಮಾದ್ಯಂ ಯನ್ಮೇ ತ್ವದನ್ಯೇನ ನ ದೃಷ್ಟಪೂರ್ವಮ್॥೪೭॥

ಭಗವಾನ್ ಉವಾಚ-ಭಗವಂತ ಹೇಳಿದನು:
ಮಯಾ ಪ್ರಸನ್ನೇನ ತವ ಅರ್ಜುನ ಇದಮ್ ರೂಪಮ್ ಪರಮ್ ದರ್ಶಿತಮ್ ಆತ್ಮಯೋಗಾತ್ ।
ತೇಜಃ ಮಯಮ್ ವಿಶ್ವಮ್ ಅನಂತಮ್ ಆದ್ಯಮ್ ಯತ್ ಮೇ ತ್ವತ್ ಅನ್ಯೇನ ನ ದೃಷ್ಟ ಪೂರ್ವಮ್ –ಅರ್ಜುನಾ, ನಾನೇ ಮೆಚ್ಚಿ ಆತ್ಮ ಶಕ್ತಿಯಿಂದ ನಿನಗೆ ತೋರಿಸಿದೆ ಈ ಹಿರಿಯ ರೂಪವನ್ನು. ಇದು ಬೆಳಕಿನ ಮೊತ್ತ. ಗುಣಗಳ ಗುಂಪು. ಇದಕ್ಕೆ ಕೊನೆಯಿಲ್ಲ. ಇದು ಎಲ್ಲದಕ್ಕೂ ಮೊದಲು. ನನ್ನೀ ರೂಪವನ್ನು ಇನ್ನಾರೂ ಈ ಮೊದಲು ಹೀಗೆ ಕಂಡದ್ದಿಲ್ಲ.

ಭಗವಂತನ ಸಂಹಾರ ರೂಪವನ್ನು ಕಂಡು ಭಯಗ್ರಸ್ತನಾಗಿರುವ ಅರ್ಜುನನನ್ನು ಕೃಷ್ಣ ಸಂತೈಸುತ್ತಾನೆ. ಕೃಷ್ಣ ಹೇಳುತ್ತಾನೆ: "ನಾನು ನಿನಗೆ ವಿಶ್ವರೂಪ ತೋರಿದ್ದು ನಿನ್ನ ಭಕ್ತಿಗೆ ಪ್ರಸನ್ನನಾಗಿಯೇ ಹೊರತು, ನಿನ್ನನ್ನು ಹೆದರಿಸುವುದಕ್ಕೋಸ್ಕರ ಅಲ್ಲ" ಎಂದು. ಕೃಷ್ಣ ತನ್ನ ಅವತಾರದಲ್ಲಿ ಅನೇಕ ಬಾರಿ ತನ್ನ ವಿಶ್ವರೂಪ ದರ್ಶನ ತೋರಿದ್ದ. ಯಶೋದೆ-ಮಣ್ಣು ತಿಂದ ಕೃಷ್ಣನ ಬಾಯಿಯನ್ನು ತೆರೆಯಲು ಹೇಳಿದಾಗ, ಅಲ್ಲಿ ಆಕೆಗೆ ತನ್ನ ಬಾಯಿಯಲ್ಲಿ ವಿಶ್ವರೂಪ ದರ್ಶನ ಮಾಡಿಸಿದ್ದ. ಇನ್ನೊಮ್ಮೆ ಹಾಲು ಕುಡಿದು ಆಕಳಿಸಿದ ಪುಟ್ಟ ಕೃಷ್ಣನ ಬಾಯಿಯಲ್ಲಿ ಯಶೋದೆ ಭಗವಂತನ ವಿಶ್ವರೂಪ ದರ್ಶನ ಪಡೆದಿದ್ದಳು. ಸಂಧಾನಕ್ಕೆಂದು ಧೃತರಾಷ್ಟ್ರನ ಸಭೆಗೆ ಬಂದ ಕೃಷ್ಣನನ್ನು ದುರ್ಯೋಧನ ಬಂಧಿಸಲು ಪ್ರಯತ್ನಿಸಿದಾಗ, ಅಲ್ಲಿ ಕೃಷ್ಣ ತನ್ನ ವಿಶೇಷ ರೂಪವನ್ನು ತೋರಿದ್ದ. ಇಷ್ಟೇ ಅಲ್ಲದೆ ಗರ್ಗಾಚಾರ್ಯರಿಗೆ, ಉದಂಕ ಮುನಿಗೆ ಕೂಡಾ ಕೃಷ್ಣನ ವಿಶ್ವರೂಪ ದರ್ಶನವಾಗಿತ್ತು. ಆದರೆ ಇಲ್ಲಿ ಅರ್ಜುನನಿಗೆ ಕೃಷ್ಣ ತೋರಿದ ವಿಶ್ವರೂಪ ಎಲ್ಲಕ್ಕಿಂತ ಅಪರಿಮಿತವಾದುದು. "ಭೂಲೋಕದಲ್ಲಿ ಯಾರೂ ಈ ಮೊದಲು ಹೀಗೆ ಕಂಡದ್ದಿಲ್ಲ ಎನ್ನುತ್ತಾನೆ" ಕೃಷ್ಣ. ಭಗವಂತನ ವಿಶ್ವರೂಪ-ಅದೊಂದು ಬೆಳಕಿನ ಪುಂಜ. ಅದು ಗುಣಗಳ ಸಾಗರ. ಅನಂತವಾದ ಈ ವಿಶ್ವರೂಪ ದರ್ಶನವನ್ನು ಅರ್ಜುನ ಪಡೆದ.

ನ ವೇದಯಜ್ಞಾಧ್ಯಯನೈರ್ನ ದಾನೈಃ ನಚ ಕ್ರಿಯಾಭಿರ್ನ ತಪೋಭಿರುಗ್ರೈಃ ।
ಏವಂರೂಪಃ ಶಕ್ಯ ಅಹಂ ನೃಲೋಕೇ ದ್ರಷ್ಟುಂ ತ್ವದನ್ಯೇನ ಕುರುಪ್ರವೀರ ॥೪೮॥

ನ ವೇದ ಯಜ್ಞ ಅಧ್ಯಯನೈಃ ನ ದಾನೈಃ ನ ಚ ಕ್ರಿಯಾಭಿಃ ನ ತಪೋಭಿಃ ಉಗ್ರೈಃ ।
ಏವಮ್ ರೂಪಃ ಶಕ್ಯಃ ಅಹಮ್ ನೃಲೋಕೇ ದ್ರಷ್ಟುಮ್ ತ್ವತ್ ಅನ್ಯೇನ ಕುರು ಪ್ರವೀರ – ಕುರುವಂಶದ ಕಡುಗಲಿಯೇ, ಭೂಲೋಕದಲ್ಲಿ ನೀನಲ್ಲದೆ ಇನ್ನಾರೂ ಇಂತಹ ಬಗೆಯ ನನ್ನನ್ನು ಕಾಣುವುದು ಸಾಧ್ಯವಿಲ್ಲ.

ಸಾಧ್ಯವಿಲ್ಲ ವೇದಗಳಲ್ಲಿ ಕರ್ಮಕಾಂಡವನ್ನರಸುವ ಕಲಿಕೆಗಳಿಂದ. ಇಲ್ಲ ಕೊಡುಗೆಗಳಿಂದ. ಇಲ್ಲ ನೇಮ ನೋಂಪಿಗಳಿಂದ. ಇಲ್ಲ ಕಟ್ಟುನಿಟ್ಟಿನ ತಪಗಳಿಂದ.

ಭಗವಂತನ ಪ್ರೀತಿಗೆ ಪಾತ್ರರಾಗದ ಯಾರೂ ಆತನ ವಿಶ್ವರೂಪ ದರ್ಶನ ಪಡೆಯಲು ಸಾಧ್ಯವಿಲ್ಲ. ವೇದಾಧ್ಯಯನದಿಂದ, ಯಜ್ಞದಿಂದ, ದಾನದಿಂದ ಇತ್ಯಾದಿ ಕರ್ಮದಿಂದ ಸರ್ವೋತ್ತಮನಾದ, ಸರ್ವ ವಿಲಕ್ಷಣನಾದ ಭಗವಂತನ ವಿಶ್ವರೂಪ ದರ್ಶನ ಪಡೆಯುವುದು ಸಾಧ್ಯವಿಲ್ಲ. "ಅಂತಹ ನನ್ನ ರೂಪವನ್ನು ಕರ್ಮ ನಿಷ್ಠನಾದ(ಕುರುಪ್ರವೀರ) ನೀನು ಕಂಡೆ" ಎನ್ನುತ್ತಾನೆ ಕೃಷ್ಣ.

> ಮಾ ತೇ ವ್ಯಥಾ ಮಾ ಚ ವಿಮೂಢಭಾವೋ ದೃಷ್ಟ್ವಾ ರೂಪಂ ಘೋರಮೀದೃಙ್ಮಮೇದಮ್ ।
> ವ್ಯಪೇತಭೀಃ ಪ್ರೀತಮನಾಃ ಪುನಸ್ತ್ವಂ ತದೇವ ಮೇ ರೂಪಮಿದಂ ಪ್ರಪಶ್ಯ ॥೪೯॥

ಮಾ ತೇ ವ್ಯಥಾ ಮಾ ಚ ವಿಮೂಢಭಾವಃ ದೃಷ್ಟ್ವಾ ರೂಪಮ್ ಘೋರಮ್ ಈದೃಕ್ ಮಮ ಇದಮ್ ।
ವ್ಯಪೇತ ಭೀಃ ಪ್ರೀತ ಮನಾಃ ಪುನಃ ತ್ವಮ್ ತತ್ ಏವ ಮೇ ರೂಪಮ್ ಇದಮ್ ಪ್ರಪಶ್ಯ –ನಡುಗಿಸುವ ನನ್ನ ಇಂತಹ ರೂಪವನ್ನು ಕಂಡು ಕಳವಳಿಸಬೇಡ; ಕಂಗೆಡಬೇಡ. ಮತ್ತೆ ನೀನು ನನ್ನ ಆ ಮೊದಲ ರೂಪವನ್ನೇ ನೋಡು- ಅಂಜಿಕೆ ತೊರೆದು,ಬಗೆಯೊಳಕ್ಕರೆ ತುಂಬಿ.

ಶತ್ರು ಸಂಹಾರಕವಾದ ನನ್ನ ಈ ರೂಪವನ್ನು ಕಂಡು ಗಾಬರಿಯಾಗಬೇಡ. ನಿನ್ನೆಲ್ಲಾ ಭಯವನ್ನು ಬಿಟ್ಟು ನೋಡು ನಿನಗಿಷ್ಟವಾದ ನನ್ನ ಚತುರ್ಭುಜ ರೂಪವನ್ನು ಎನ್ನುತ್ತಾನೆ ಕೃಷ್ಣ.

ಸಂಜಯ ಉವಾಚ ।

> ಇತ್ಯರ್ಜುನಂ ವಾಸುದೇವಸ್ತಥೋಕ್ತ್ವಾ ಸ್ವಕಂ ರೂಪಂ ದರ್ಶಯಾಮಾಸ ಭೂಯಃ।
> ಆಶ್ವಾಸಯಾಮಾಸ ಚ ಭೀತಮೇನಂ ಭೂತ್ವಾ ಪುನಃ ಸೌಮ್ಯವಪುರ್ಮಹಾತ್ಮಾ ॥೫೦॥

ಸಂಜಯ ಉವಾಚ- ಸಂಜಯ ಹೇಳಿದನು:
ಇತಿ ಅರ್ಜುನಮ್ ವಾಸುದೇವಃ ತಥಾ ಉಕ್ತ್ವಾ ಸ್ವಕಮ್ ರೂಪಮ್ ದರ್ಶಯಾಮ್ ಆಸ ಭೂಯಃ ।
ಆಶ್ವಾಸಯಾಮ್ ಆಸ ಚ ಭೀತಮ್ ಏನಮ್ ಭೂತ್ವಾ ಪುನಃ ಸೌಮ್ಯವಪುಃ ಮಹಾತ್ಮಾ –ವಾಸುದೇವ ಹೀಗೆ ನುಡಿದು ಮರಳಿ ಅರ್ಜುನನಿಗೆ ತನ್ನ ಕೃಷ್ಣ ರೂಪವನ್ನೇ ತೋರಿದ. ಮಹಾತ್ಮನಾದ ಕೃಷ್ಣ ಹೀಗೆ ಮರಳಿ ಸೌಮ್ಯರೂಪ ತಾಳಿ ಅಂಜಿದ್ದ ಅರ್ಜುನನನ್ನು ಸಂತೈಸಿದ.

ಈ ಶ್ಲೋಕದಲ್ಲಿ ಸಂಜಯ ಭಗವಂತನನ್ನು ವಾಸುದೇವ ಎಂದು ಸಂಬೋಧಿಸಿದ್ದಾನೆ. ಭಗವಂತನ ಈ ನಾಮಕ್ಕೆ ಅನೇಕ ಅರ್ಥಗಳಿವೆ. ವಾಸು+ದೇವ-ವಾಸುದೇವ. ಭಗವಂತ ವಾಸು, ಅಂದರೆ ತನ್ನನ್ನು ತಾನು ಮುಚ್ಚಿಕೊಂಡವನು. ಯಾವಾಗ ನಾವು ಸಂಸಾರ ಬಂಧನದ ಹದಿನೈದು ಬೇಲಿಗಳನ್ನು ದಾಟಿ, ಸಮಾಧಿ

ಸ್ಥಿತಿಯಿಂದ ಆಳಕ್ಕಿಳಿದು, ಹದಿನಾರನೇ ಜೀವಸ್ವರೂಪವನ್ನು ಕಾಣುತ್ತೇವೋ, ಆಗ ಭಗವಂತನ ಸಾಕ್ಷಾತ್ಕಾರವಾಗುತ್ತದೆ. ಈ ಸ್ಥಿತಿಯಲ್ಲಿ ಮುಚ್ಚಿಕೊಂಡ ಭಗವಂತ ದೇವನಾಗಿ ತೆರೆದುಕೊಳ್ಳುತ್ತಾನೆ. ಭಗವಂತನನ್ನು ಕಾಣಬೇಕಾದರೆ ಮೊದಲು ನಾವು ನಮ್ಮನ್ನು ಕಾಣಬೇಕು. ನಮ್ಮ ಅರಿವೇ ನಮಗಿಲ್ಲದೆ ಭಗವಂತನನ್ನು ಕಾಣುವುದು ಅಸಾಧ್ಯ. ನಾವು ನಮ್ಮ ಜೀವಸ್ವರೂಪವನ್ನು ಕಂಡಾಗ, ಅದರೊಳಗಿನಿಂದ ಸಾಕ್ಷಾತ್ಕಾರವಾಗುವ ಭಗವಂತ ದೇವಃ. ನಾವು ನಮ್ಮ ಪಂಚಕೋಶಗಳ(ಅನ್ನಮಯ ಕೋಶ, ಪ್ರಾಣಮಯ ಕೋಶ , ವಿಜ್ಞಾನಮಯ ಕೋಶ, ಮನೋಮಯ ಕೋಶ ಹಾಗೂ ಆನಂದಮಯ ಕೋಶ) ಪರದೆಯಲ್ಲಿದ್ದಾಗ ವಾಸುವಾಗಿ; ಪರದೆಯಿಂದಾಚೆಗೆ ಬಂದು ಜೀವ ಸ್ವರೂಪವನ್ನು ಕಂಡಾಗ ದೇವನಾಗಿ ದರ್ಶನ ಕೊಡುವ ಭಗವಂತ ವಾಸುದೇವಃ.

ಅರ್ಜುನ ಉವಾಚ ।

ದೃಷ್ಟ್ವೇದಂ ಮಾನುಷಂ ರೂಪಂ ತವ ಸೌಮ್ಯಂ ಜನಾರ್ದನ ।
ಇದಾನೀಮಸ್ಮಿ ಸಂವೃತ್ತಃ ಸಚೇತಾಃ ಪ್ರಕೃತಿಂ ಗತಃ ॥೫೧॥

ಅರ್ಜುನಃ ಉವಾಚ-ಅರ್ಜುನ ಹೇಳಿದನು:
ದೃಷ್ಟ್ವಾ ಇದಮ್ ಮಾನುಷಮ್ ರೂಪಮ್ ತವ ಸೌಮ್ಯಮ್ ಜನಾರ್ದನ ।
ಇದಾನೀಮ್ ಅಸ್ಮಿ ಸಂವೃತ್ತಃ ಸಚೇತಾಃ ಪ್ರಕೃತಿಮ್ ಗತಃ –ಜನಾರ್ದನಾ, ಮನುಷ್ಯಾಕಾರದ ನಿನ್ನ ಈ ಸೌಮ್ಯರೂಪವನ್ನು ಕಂಡು ಜೀವ ಬಂತು. ಈಗ ಚೇತರಿಸಿಕೊಂಡು ಸಹಜ ಸ್ಥಿತಿಗೆ ಮರಳುತ್ತಿದ್ದೇನೆ.

ಇಲ್ಲಿ ಅರ್ಜುನ ಭಗವಂತನನ್ನು ಜನಾರ್ದನ ಎಂದು ಸಂಬೋಧಿಸಿದ್ದಾನೆ. ಜನ+ಅರ್ದನ-ಜನಾರ್ದನ. ಇಲ್ಲಿ ಅರ್ದನ ಅಂದರೆ ಕೊನೆಗೊಳಿಸುವವನು ಎನ್ನುವ ಅರ್ಥವನ್ನು ಕೊಡುತ್ತದೆ. 'ಜನ' ಅನ್ನುವ ಪದಕ್ಕೆ ಅನೇಕ ಅರ್ಥಗಳಿವೆ. ಜನ ಅಂದರೆ ದುರ್ಜನ. ಜನಾರ್ದನ ಅಂದರೆ ದುರ್ಜನ ನಾಶಕ. ಜನ ಅಂದರೆ ಜನನ ಉಳ್ಳವರು. ಜನಾರ್ದನ ಎಂದರೆ ಜನನ ಮುಕ್ತಗೊಳಿಸುವವನು ಅಂದರೆ ಮುಕ್ತಿಪ್ರದಾಯಕ. "ದುರ್ಜನರ ಸಂಹಾರಕ್ಕೆಂದು ನಿಂತಿರುವ ನಿನ್ನ ಆ ರೂಪವನ್ನು ಕಂಡು ನಾನು ಭಯಗೊಂಡಿದ್ದೆ. ಭಕ್ತರ ಕರೆಗೆ ಓಗೊಟ್ಟು, ತನ್ನ ಭಕ್ತರಿಗೆ ಮೋಕ್ಷವನ್ನು ಕರುಣಿಸುವ ನಿನ್ನ ಈ ಸೌಮ್ಯ ರೂಪವನ್ನು ಕಂಡು ನಾನು ಚೇತರಿಸಿಕೊಂಡೆ"- ಎನ್ನುವ ಭಾವ ಈ ಸಂಬೋಧನೆಯಲ್ಲಿದೆ.

ಭಗವಾನುವಾಚ ।

ಸುದುರ್ದರ್ಶಮಿದಂ ರೂಪಂ ದೃಷ್ಟವಾನಸಿ ಯನ್ಮಮ ।
ದೇವಾ ಅಪ್ಯಸ್ಯ ರೂಪಸ್ಯ ನಿತ್ಯಂ ದರ್ಶನಕಾಂಕ್ಷಿಣಃ ॥೫೨॥

ನಾಹಂ ವೇದೈರ್ನ ತಪಸಾ ನ ದಾನೇನ ನ ಚೇಜ್ಯಯಾ ।
ಶಕ್ಯ ಏವಂವಿಧೋ ದ್ರಷ್ಟುಂ ದೃಷ್ಟವಾನಸಿ ಮಾಂ ಯಥಾ ॥೫೩॥

ಭಗವಾನುವಾಚ-ಭಗವಂತ ಹೇಳಿದನು:

ಸುದುರ್ದರ್ಶಮ್ ಇದಮ್ ರೂಪಮ್ ದೃಷ್ಟವಾನ್ ಅಸಿ ಯತ್ ಮಮ ।

ದೇವಾಃ ಅಪಿ ಅಸ್ಯ ರೂಪಸ್ಯ ನಿತ್ಯಮ್ ದರ್ಶನ ಕಾಂಕ್ಷಿಣಃ ॥

ನ ಅಹಂ ವೇದೈಃ ನ ತಪಸಾ ನ ದಾನೇನ ನ ಚ ಇಜ್ಯಯಾ ।

ಶಕ್ಯಃ ಏವಂ ವಿಧಃ ದ್ರಷ್ಟುಮ್ ದೃಷ್ಟವಾನ್ ಅಸಿ ಮಾಮ್ ಯಥಾ --ನೀನು ಕಂಡ ನನ್ನ ಈ ರೂಪ ಸುಲಭವಾಗಿ ಕಾಣಬರುವಂತದಲ್ಲ. ದೇವತೆಗಳು ಕೂಡಾ ಈ ರೂಪವನ್ನು ಕಾಣಲೆಂದು ಅನುಗಾಲ ಕಾಯುತ್ತಿರುತ್ತಾರೆ.

ನೀನು ಕಂಡ ಹಾಗೆ ಈ ಬಗೆಯ ನನ್ನನ್ನು ಕಾಣಲು ಬರಿದೆ ವೇದಗಳನ್ನೋದುವುದರಿಂದ ಸಾಧ್ಯವಿಲ್ಲ. ಇಲ್ಲ ತಪಸ್ಸಿನಿಂದ, ಇಲ್ಲ ದಾನದಿಂದ, ಇಲ್ಲ ಯಜ್ಞದಿಂದಲೂ.

ಭಗವಂತ ಅರ್ಜುನನಿಗೆ ಕಾಣಿಸಿದ ತನ್ನ ಅಪೂರ್ವ ರೂಪ ಬಹಳ ದುರ್ಲಭರೂಪ. ಇಂತಹ ಅಪೂರ್ವ ರೂಪವನ್ನು ಕಾಣಲು ದೇವತೆಗಳೂ ಕೂಡಾ ಆಸೆಯಿಂದ ಅನುಗಾಲ ಕಾಯುತ್ತಿರುತ್ತಾರೆ. ಕೃಷ್ಣ ಇಲ್ಲಿ ಮತ್ತೆ ಒತ್ತು ಕೊಟ್ಟು ಹಿಂದೆ ಹೇಳಿದ ವಿಚಾರವನ್ನು ಮರಳಿ ಹೇಳುತ್ತಾನೆ. "ಸ್ವಸಾಮರ್ಥ್ಯದಿಂದ(ವೇದಾಧ್ಯಾಯನ, ಯಜ್ಞ, ದಾನ, ತಪಸ್ಸು ಇತ್ಯಾದಿ ಕರ್ಮಗಳನ್ನು ಮಾಡುವ ಮುಖೇನ) ನನ್ನ ಈ ವಿಶಿಷ್ಠ ರೂಪವನ್ನು ಕಾಣಲು ಸಾಧ್ಯವಿಲ್ಲ"ಎನ್ನುತ್ತಾನೆ ಕೃಷ್ಣ.

ಭಕ್ತ್ಯಾ ತ್ವನನ್ಯಯಾ ಶಕ್ಯ ಅಹಮೇವಂವಿಧೋಽರ್ಜುನ ।
ಜ್ಞಾತುಂ ದ್ರಷ್ಟುಂ ಚ ತತ್ತ್ವೇನ ಪ್ರವೇಷ್ಟುಂ ಚ ಪರಂತಪ ॥೫೪॥

ಭಕ್ತ್ಯಾ ತು ಅನನ್ಯಯಾ ಶಕ್ಯಃ ಅಹಂ ಏವಮ್ ವಿಧಃ ಅರ್ಜುನ ।

ಜ್ಞಾತುಮ್ ದ್ರಷ್ಟುಮ್ ಚ ತತ್ತ್ವೇನ ಪ್ರವೇಷ್ಟುಮ್ ಚ ಪರಂತಪ -ಅರಿಗಳನ್ನು ಸುಟ್ಟುರಿಯುವ ಅರ್ಜುನಾ, ನನ್ನನ್ನು ಈ ಪರಿ ಸರಿಯಾಗಿ ಅರಿಯಲು, ಅರಿತು ಕಾಣಲು, ಕಂಡು ಸೇರಲು ನನ್ನಲ್ಲೇ ನೆಲೆಗೊಂಡ ಭಕ್ತಿಯಿಂದ ಮಾತ್ರವೇ ಸಾಧ್ಯ.

ಭಗವಂತನನ್ನು ಕಾಣಲು ಇರುವ ಮೂಲ ಮಂತ್ರ 'ಭಕ್ತಿ'. ಏಕನಿಷ್ಠೆಯಿಂದ ಭಗವಂತನನ್ನು ಅನನ್ಯವಾಗಿ ಭಕ್ತಿ ಮಾಡುವುದರಿಂದ ಆತನನ್ನು ಸೇರಲು ಸಾಧ್ಯ. ಎಲ್ಲರಿಗೂ ಮಿಗಿಲಾದ ಭಗವಂತ ಭಕ್ತ ಪರಾಧೀನ.

ಮತ್ಕರ್ಮಕೃನ್ಮತ್ಪರಮೋ ಮದ್ಭಕ್ತಃ ಸಂಗವರ್ಜಿತಃ ।
ನಿರ್ವೈರಃ ಸರ್ವಭೂತೇಷು ಯಃ ಸ ಮಾಮೇತಿ ಪಾಂಡವ ॥೫೫॥

ಮತ್ ಕರ್ಮ ಕೃತ್ ಮತ್ ಪರಮಃ ಮತ್ ಭಕ್ತಃ ಸಂಗವರ್ಜಿತಃ ।

ನಿರ್ವೈರಃ ಸರ್ವಭೂತೇಷು ಯಃ ಸ ಮಾಮ್ ಏತಿ ಪಾಂಡವ -ಓ ಪಾಂಡವಾ, ಎಲ್ಲವನ್ನು ನನಗಾಗಿ ಮಾಡುವವನು, ನನ್ನನ್ನೇ ಪರದೈವವೆಂದು ತಿಳಿದವನು, ವಿಷಯದ ನಂಟು ತೊರೆದು ನನ್ನಲ್ಲಿ ಭಕ್ತಿಯಿಟ್ಟವನು, ಯಾವ ಜೀವಿಗಳಲ್ಲೂ ಹಗೆಗೊಳ್ಳದವನು -ನನ್ನನ್ನು ಪಡೆಯುತ್ತಾನೆ.

ಭಗವಂತನನ್ನು ಕಾಣಲು ಭಕ್ತಿಯ ಜೊತೆಗೆ ಇರುವ ಅತಿಮುಖ್ಯವಾದ ಅಂಶವನ್ನು ಕೃಷ್ಣ ಇಲ್ಲಿ ವಿವರಿಸುತ್ತಾನೆ. ನಾವು ಮಾಡುವ ಕಾರ್ಯವನ್ನು 'ನಾನು ಮಾಡಿದೆ' ಎಂದು ಅಹಂಕಾರ ಪಡದೆ, ಭಗವಂತ ನನ್ನ ಕೈಯಿಂದ ಮಾಡಿಸಿದ ಎನ್ನುವ ಅನುಸಂಧಾನ; ಅರ್ಪಣ ಭಾವ, ಫಲದ ಅಪೇಕ್ಷೆ ಇಲ್ಲದ ಭಕ್ತಿ, ದ್ವೇಷ ಪ್ರತೀಕಾರವಿಲ್ಲದೆ ಭಗವಂತನಲ್ಲಿ ಶರಣಾಗತಿ, ನಿರ್ಲಿಪ್ತ ಭಾವದಿಂದ ಭಗವಂತ ಸರ್ವೋತ್ತಮ ಎನ್ನುವ ಸತ್ಯವನ್ನರಿತು ಆತನನ್ನು ಪ್ರೀತಿಸುವುದು-ಇದರಿಂದ ಭಗವಂತನನ್ನು ಕಾಣಲು ಸಾಧ್ಯ.

**ಇತ್ಯೇಕಾದಶೋಽಧ್ಯಾಯಃ**

ಹನ್ನೊಂದನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಹನ್ನೆರಡು

ಹಿಂದಿನ ಅಧ್ಯಾಯದ ಕೊನೆಯಲ್ಲಿ ಭಗವಂತ "ನಿಷ್ಕಾಮ ಭಕ್ತಿಯಿಂದ ಮಾತ್ರ ನನ್ನನ್ನು ಕಾಣಲು ಸಾಧ್ಯ" ಎಂದು ಹೇಳಿದ. ಹೀಗೆ ಹೇಳಿದಾಗ-ಯಾವ ರೀತಿ ಭಗವಂತನಲ್ಲಿ ನಾವು ಭಕ್ತಿ ಮಾಡಬೇಕು, ಯಾವುದು ನಿಜವಾದ ಭಕ್ತಿ, ಭಕ್ತನಲ್ಲಿರಬೇಕಾದ ಗುಣಗಳೇನು, ಇತ್ಯಾದಿ ಪ್ರಶ್ನೆ ನಮ್ಮಲ್ಲಿ ಮೂಡುತ್ತದೆ. ಪ್ರಶ್ನೋಪನಿಷತ್ತಿನಲ್ಲಿ ಹೇಳುವಂತೆ:

ಸ ಪ್ರಾಣಮಸೃಜತ ಪ್ರಾಣಾಚ್ಛ್ರದ್ಧಾಂ ಖಂ ವಾಯುರ್ಜ್ಯೋತಿರಾಪಃ ಪೃಥಿವೀಂದ್ರಿಯಂ ಮನಃ |
ಅನ್ನಮನ್ನಾದ್ವೀರ್ಯಂ ತಪೋ ಮಂತ್ರಾಃ ಕರ್ಮ ಲೋಕಾ ಲೋಕೇಷು ಚ ನಾಮ ಚ || ೪||

ಭಗವಂತ ಈ ಪ್ರಪಂಚವನ್ನು ಸೃಷ್ಟಿ ಮಾಡಿ, ಹದಿನೈದು ಬೇಲಿಗಳ ಈ ಸಂಸಾರದಲ್ಲಿ ಜೀವವನ್ನು ಇಟ್ಟ. ಈ ಹದಿನೈದು ಬೇಲಿಗಳೆಂದರೆ:

1. ಶ್ರದ್ಧೆಯ ಬೇಲಿ:  ಕಿತ್ತೆಸೆಯಲು ಆಗದ ಬೇಲಿ- ಜೀವ ಸ್ವಭಾವದಿಂದ ಬಂದ ಶ್ರದ್ಧೆ. ಮತ್ತು  ಕಿತ್ತೆಸೆಯಬೇಕಾದ ಬೇಲಿ-ಮನೆತನ , ಕುಟುಂಬ , ಬೆಳೆದ ವಾತಾವರಣದ ಪ್ರಭಾವದಿಂದ ಬಂದ ಶ್ರದ್ಧೆ.
2 -6. ಪಂಚಭೂತಗಳ ಬೇಲಿ : ಮಣ್ಣು-ನೀರು( ಅನ್ನಮಯ ಕೋಶ) ಬೆಂಕಿ-ಗಾಳಿ-ಆಕಾಶ(ಪ್ರಾಣಮಯ ಕೋಶ).
7.  ಇಂದ್ರಿಯಗಳ ಬೇಲಿ: ಐದು ಜ್ಞಾನೇಂದ್ರಿಯಗಳು ಐದು ಕರ್ಮೇಂದ್ರಿಯಗಳು.
8.  ಅಂತಃಕರಣದ ಬೇಲಿ: ಕೆಟ್ಟದ್ದನ್ನು ಯೋಚಿಸುವ ಮನಸ್ಸು
9. ಅನ್ನದ ಬೇಲಿ: ಆಹಾರ
10. ವೀರ್ಯದ ಬೇಲಿ: ಶಕ್ತಿ
11. ತಪಃ : ಹಾಗಾಗಬೇಕು ಹೀಗಾಗಬೇಕು ಅನ್ನುವ ಆಲೋಚನೆ (ತಿರುಕನ ಕನಸಿನಂತೆ).
12. ಮಂತ್ರಾಃ :ತನ್ನ ಕನಸನ್ನು ನನಸು ಮಾಡಲು ಆಡುವ ಮಾತುಗಾರಿಕೆ.
13. ಕರ್ಮಃ : ಕನಸನ್ನು ಸಾಧಿಸಲು ಮಾಡುವ ಕರ್ಮ.
14. ಲೋಕಗಳು : ಸ್ಥಿರ-ಚರ ಸೊತ್ತುಗಳು (ನಾನು ಮಾಡಿದ್ದು , ನನ್ನದು ಅನ್ನುವ ಸೊತ್ತುಗಳು)
15. ನಾಮದ ಬೇಲಿ : ಕೀರ್ತಿ(Name and fame).

ಈ ಹದಿನೈದು ಬೇಲಿಯ ಒಳಗೆ ಸಿಕ್ಕಿ ಹಾಕಿಕೊಂಡಿರುವ ಹದಿನಾರನೆಯದಾದ 'ಕ್ಷರ' ಜೀವನಿಗೆ ಈ ಮೇಲಿನ ಬೇಲಿ ಎನ್ನುವ ಅಂಗಿ ಹಾಕಿ ಈ ಪ್ರಪಂಚಕ್ಕೆ ಕಳಿಸಿರುವ ಚಿತ್ ಪ್ರಕೃತಿ ಹದಿನೇಳನೆಯವಳಾದ-ಲಕ್ಷ್ಮಿ. ಆಕೆ ಅಕ್ಷರಪುರುಷಳು. ಕ್ಷರ-ಅಕ್ಷರಗಳಿಗಿಂತ ಅತೀತನಾದ ಭಗವಂತ ಹದಿನೆಂಟನೆಯವನಾದ ಪುರುಷಃ. ಆತ ಪುರುಷೋತ್ತಮ. ಗೀತೆಯಲ್ಲಿ ಇಲ್ಲಿಯ ತನಕ ಮುಖ್ಯವಾಗಿ ಭಗವಂತ ಒತ್ತುಕೊಟ್ಟು  ಹೇಳಿರುವುದೇನೆಂದರೆ "ನನ್ನನ್ನು ಭಕ್ತಿಯಿಂದ ಭಜಿಸುವವನು ಈ ಸಂಸಾರಬಂಧದಿಂದ ಮುಕ್ತಿ ಪಡೆದು ನನ್ನನ್ನು ಸೇರುತ್ತಾನೆ" ಎಂದು. ಇಲ್ಲಿ ನಮಗೆ ಬರುವ ಪ್ರಶ್ನೆ ಏನೆಂದರೆ-ಏಕೆ ಭಗವಂತನನ್ನು ಬಿಟ್ಟು ಹದಿನೇಳನೆಯವಳಾದ ಶ್ರೀತತ್ವವನ್ನು ಪೂಜಿಸಬಾರದು? ತಂದೆಗಿಂತ ತಾಯಿ ಕರುಣಾಮಯಿ. ನಮ್ಮನ್ನು ಸಂಸಾರಬಂಧದಲ್ಲಿ ಹಾಕಿದ ತಾಯಿಯನ್ನು ಪೂಜಿಸುವುದರಿಂದ ನಮಗೆ ಮೋಕ್ಷಪ್ರಾಪ್ತಿ ಸುಲಭವಾಗಬಹುದಲ್ಲವೇ? ಯಾವ ದಾರಿ ಹೆಚ್ಚು ಸೂಕ್ತ? –ಇದು

ಸಾಮಾನ್ಯವಾಗಿ ಎಲ್ಲರಿಗೂ ಬರುವ ಪ್ರಶ್ನೆ. ಶ್ರೀತತ್ವದ ಉಪಾಸನೆಯಿಂದ ಮುಕ್ತಿ ಸಾಧ್ಯ ಎಂದು ಸ್ತುತಿಯಲ್ಲಿ ಹೇಳಲಾಗಿದೆ. ಉದಾಹರಣೆಗೆ ಎಲ್ಲರೂ ದೇವರ ಪೂಜೆ ಮಾಡಿ ಮಂಗಳಾರತಿ ಮಾಡುವಾಗ ಹೇಳುವ ಈ ಕೆಳಗಿನ ಶ್ರೀಸೂಕ್ತದ ಸಾಲುಗಳು:

ಶ್ರಿಯೇ ಜಾತಃ ಶ್ರಿಯ ಆನಿರ್ಯಾಯಃ ಶ್ರಿಯಂ ವಯೋ ಜನಿತೃಭ್ಯೋದಧಾತು ।
ಶ್ರಿಯಂ ವಸಾನಾಃ ಅಮೃತತ್ವಮಾಯನ್ ಭಜಂತಿ ಸದ್ಯಸ್ಸಮಿಧಾ ಮಿತದ್ಯೂನ್ ॥

ಇಲ್ಲಿ ಹೇಳುವಂತೆ: "ಶ್ರೀತತ್ವದ ಉಪಾಸನೆಗೋಸ್ಕರ ನಾವು ಹುಟ್ಟಿದ್ದೇವೆ. ಶ್ರೀತತ್ವವನ್ನು ಸ್ತೋತ್ರಮಾಡುವವನಿಗೆ ಆಕೆ ಸಂಪತ್ತನ್ನೂ, ಧೀರ್ಘಾಯುಷ್ಯವನ್ನೂ ಕೊಡುತ್ತಾಳೆ. ಶ್ರೀತತ್ವ ಉಪಾಸನೆ ಮಾಡಿದವರು ಅಮೃತತ್ವವನ್ನು ಪಡೆದರು. ದಂಪತಿಗಳು ಶ್ರೀತತ್ವವನ್ನು ಉಪಾಸನೆ ಮಾಡುವುದರಿಂದ ಅವರ ಇಷ್ಟಾರ್ಥ ಸಿದ್ಧಿಯಾಗುತ್ತದೆ. ಆಕೆ ಮೋಕ್ಷಪ್ರದಳು". ಹೀಗೆ ಹೇಳಿರುವುದರಿಂದ ಶ್ರೀತತ್ವದ ಉಪಾಸನೆಯಿಂದ ಕೂಡಾ ಮೋಕ್ಷ ಪಡೆಯಬಹುದು ಎನ್ನುವ ಅಂಶ ಸ್ಪಷ್ಟ. ಪುರುಷೋತ್ತಮ ಭಗವಂತನ ಉಪಾಸನೆ ಮತ್ತು ಶ್ರೀತತ್ವ ಅಥವಾ ಅಕ್ಷರ ಉಪಾಸನೆ ಇದರಲ್ಲಿ ಯಾವ ದಾರಿ ಹೆಚ್ಚು ಸೂಕ್ತ? ಇದು ಇಲ್ಲಿ ನಮ್ಮ ನಿಮ್ಮೆಲ್ಲರ ಪ್ರಶ್ನೆ. ನಮ್ಮ ಪ್ರತಿನಿಧಿ ಅರ್ಜುನ ಈ ನಮ್ಮ ಪ್ರಶ್ನೆಯನ್ನು ಭಗವಂತನ ಮುಂದಿಡುವುದರೊಂದಿಗೆ ಈ ಅಧ್ಯಾಯ ಆರಂಭವಾಗುತ್ತದೆ. ಎರಡನೇ ಷಟ್ಕದ ಕೊನೆಯ ಅಧ್ಯಾಯವಾದ ಇಲ್ಲಿ ಕೇವಲ ಇಪ್ಪತ್ತು ಶ್ಲೋಕಗಳಿವೆ. ಅಧ್ಯಾಯ ಚಿಕ್ಕದಾದರೂ ಕೂಡಾ ಈ ಅಧ್ಯಾಯ ಅಪೂರ್ವ ವಿಷಯಗಳನ್ನೊಳಗೊಂಡ ಅಧ್ಯಾಯ. ಭಗವಂತ ಇಲ್ಲಿ ಹೇಳಿರುವ ವಿಚಾರಗಳನ್ನು ನಾವು ನಮ್ಮ ಜೀವನದಲ್ಲಿ ಅಳವಡಿಸಿಕೊಂಡರೆ ನಮ್ಮ ಬದುಕು ಸಾರ್ಥಕವಾಗುತ್ತದೆ. ಬನ್ನಿ, ಈ ಅಧ್ಯಾಯದಲ್ಲಿ ಹೇಳಿರುವ ಅಪೂರ್ವ ಗುಣ-ಭಕ್ತಿ ಸಂದೇಶವನ್ನು ತಿಳಿಯೋಣ.

ಅರ್ಜುನ ಉವಾಚ ।
ಏವಂ ಸತತಯುಕ್ತಾ ಯೇ ಭಕ್ತಾಸ್ತ್ವಾಂ ಪರ್ಯುಪಾಸತೇ ।
ಯೇ ಚಾಪ್ಯಕ್ಷರಮವ್ಯಕ್ತಂ ತೇಷಾಂ ಕೇ ಯೋಗವಿತ್ತಮಾಃ ॥೧॥

ಅರ್ಜುನಃ ಉವಾಚ –ಅರ್ಜುನ ಕೇಳಿದನು:
ಏವಮ್ ಸತತ ಯುಕ್ತಾಃ ಯೇ ಭಕ್ತಾಃ ತ್ವಾಮ್ ಪರ್ಯುಪಾಸತೇ।
ಯೇ ಚ ಅಪಿ ಅಕ್ಷರಮ್ ಅವ್ಯಕ್ತಮ್ ತೇಷಾಮ್ ಕೇ ಯೋಗವಿತ್ತಮಾಃ –ಹೀಗೆ ನಿರಂತರ ಸಾಧನೆಯಿಂದ ನಿನ್ನನ್ನು ಸೇವಿಸುವವರು ಭಕ್ತರು ಮತ್ತು ಅಳಿವಿರದ ಅವ್ಯಕ್ತತತ್ವ(ಶ್ರೀತತ್ವ)ದ ಉಪಾಸಕರು. ಇವರಲ್ಲಿ ಯಾರು ಹೆಚ್ಚಿನವರು.

ಈ ಶ್ಲೋಕವನ್ನು ಮೇಲ್ನೋಟದಲ್ಲಿ ನೋಡಿದರೆ ಭಗವಂತನ ವಿಶಿಷ್ಟರೂಪದ ಉಪಾಸನೆ ಮತ್ತು ಯಾವುದೇ ರೂಪಗಳಿಂದ ವ್ಯಕ್ತವಾಗದ ನಿರಾಕಾರ ಭಗವಂತನ ಉಪಾಸನೆ-ಇವೆರಡರಲ್ಲಿ ಯಾವುದು ಸೂಕ್ತ ಎಂದು

ಕೇಳಿದಂತೆ ಕಾಣುತ್ತದೆ. ಆದರೆ ಈ ಶ್ಲೋಕದಲ್ಲಿ ಅರ್ಜುನ ಕೇಳುತ್ತಿರುವ ಮೂಲ ಪ್ರಶ್ನೆಯೇ ಬೇರೆ. ಇದನ್ನು ಮಧ್ವಾಚಾರ್ಯರು ವಿಶಿಷ್ಟವಾಗಿ ವಿವರಿಸಿದ್ದಾರೆ.

ಭಗವಂತನ ಚಿಂತನೆ ಮಾಡುವವರೆಲ್ಲಾ ಭಗವದ್ ಭಕ್ತರಾಗಿರಬೇಕೆಂದೇನಿಲ್ಲ. ಭಗವಂತನ ಚಿಂತನೆ ಮಾಡುವುದಕ್ಕೆ ಬೇಕಾಗಿರುವ ಮೂಲದ್ರವ್ಯ ಪ್ರೀತಿ. ಜ್ಞಾನಪೂರ್ವಕವಾದ ಪ್ರೀತಿಯೇ-ಭಕ್ತಿ. ಹಿಂದಿನ ಕಾಲದಲ್ಲಿ ಪ್ರತಿಯೊಬ್ಬರ ಮನೆಯ ದೇವರ ಕೋಣೆಯಲ್ಲೊಂದು ವಿಗ್ರಹವಿರುತ್ತಿತ್ತು. ಅವರವರ ಉಪಾಸನೆಗೆ ಯಾವುದು ಇಷ್ಟವೋ ಅಂತಹ ಇಷ್ಟದೇವತೆಯ ವಿಗ್ರಹ. ನಾವು ಈ ಅಂಶವನ್ನು ವಿಶ್ಲೇಷಿಸಿದರೆ ಏಕೆ ಈ ರೀತಿ ಪ್ರತಿಮೆಯನ್ನು ಇಟ್ಟು ಪೂಜಿಸುತ್ತಿದ್ದರು ಎನ್ನುವುದು ತಿಳಿಯುತ್ತದೆ. ಇಲ್ಲಿ ಮೊದಲು ನಾವು ನಮ್ಮ ಮನಸ್ಸು ಹೇಗೆ ಕೆಲಸ ಮಾಡುತ್ತದೆ ಎನ್ನುವ ವಿಚಾರವನ್ನು ತಿಳಿದುಕೊಳ್ಳಬೇಕು. ಕಣ್ಣಿನಿಂದ ನೋಡದ್ದನ್ನು ಮನಸ್ಸು ಗ್ರಹಿಸುವುದಿಲ್ಲ. ಉದಾಹರಣೆಗೆ ಭಗವಂತ 'ಅತ್ಯಂತ ಸುಂದರ' ಎಂದು ತಿಳಿದು ನಾವು ಕಣ್ಣುಮುಚ್ಚಿ ಧ್ಯಾನಕ್ಕೆಕುಳಿತರೆ, ನಮ್ಮ ಮನಸ್ಸು ನಾವು ನೋಡಿದ ಯಾವುದೋ ಒಬ್ಬ ಸುಂದರ ಮನುಷ್ಯನನ್ನು ನಮಗೆ ತೋರಿಸುತ್ತದೆ! ಇದಕ್ಕಾಗಿ ಹಿಂದಿನವರು ಭಗವಂತನಿಗೆ ನಮ್ಮಂತೆ ಕರಚರಣಗಳಿವೆ, ಆದರೆ ಆತ ಯಾವ ಮನುಷ್ಯರಂತೆಯೂ ಇಲ್ಲ ಎನ್ನುವಂತೆ ಆತನ ಪ್ರತಿಮೆಯನ್ನು ಕಡೆದರು. ಈ ಪ್ರತಿಮೆಯನ್ನು ನೆನಪಿನಲ್ಲಿಟ್ಟುಕೊಂಡು ಕಣ್ಣುಮುಚ್ಚಿ ಭಗವಂತನ ಗುಣಾನುಸಂಧಾನ ಮಾಡಿದರೆ, ನಮಗೆ ಕೇವಲ ಆ ಮೂರ್ತಿ ಕಾಣಿಸುತ್ತದೆಯೇ ಹೊರತು ನಮ್ಮ ಪರಿಚಯದ ವ್ಯಕ್ತಿಯಲ್ಲ. ಇದರಿಂದ ಧ್ಯಾನ ಸುಲಭಸಾಧ್ಯವಾಗುತ್ತದೆ. ಮನಸ್ಸು ಯಾವುದೋ ವ್ಯಕ್ತಿಯನ್ನು ಚಿಂತಿಸದೆ ಪ್ರತಿಮೆಯ ರೂಪದಲ್ಲಿ ಭಗವಂತನನ್ನು ಕಾಣಲಾರಂಭಿಸುತ್ತದೆ. ಈ ಕಾರಣಕ್ಕಾಗಿ ಭಗವಂತನ ಚಿಂತನೆ ಮಾಡಲು ಒಂದು ರೂಪ ಅಗತ್ಯ.

ನಮಗೆ ತಿಳಿದಂತೆ ಮಾತೆ ಶ್ರೀಲಕ್ಷ್ಮಿಯನ್ನು ಶ್ರೀತತ್ವ, ಅಕ್ಷರಳು, ಅವ್ಯಕ್ತಳು, ಪ್ರಕೃತಿ, ಹ್ರೀ, ಇತ್ಯಾದಿ ಅನೇಕ ಹೆಸರಿನಿಂದ ಕರೆಯುತ್ತಾರೆ. ಭಗವದ್ಗೀತೆಯಲ್ಲೇ ಅನೇಕ ಕಡೆ ಈ ರೀತಿಯ ಸಂಬೋಧನೆ ಕಾಣಸಿಗುತ್ತವೆ. ಕಠೋಪನಿಷತ್ತಿನಲ್ಲಿ ಹೇಳುವಂತೆ "ಮಹತಃ ಪರಮವ್ಯಕ್ತಮವ್ಯಕ್ತಾತ್ಪುರುಷಃ ಪರಃ" . ಅಂದರೆ ಮಹತತ್ವಕ್ಕಿಂತ ಅವ್ಯಕ್ತ ತತ್ವ ಹಿರಿದು, ಅವ್ಯಕ್ತ ತತ್ವಕ್ಕಿಂತ ಪುರುಷನಾದ ಭಗವಂತ ಹಿರಿಯ. ಇಲ್ಲಿ ಸ್ಪಷ್ಟವಾಗಿ ನಮಗೆ ತಿಳಿವುದೇನೆಂದರೆ-ಅವ್ಯಕ್ತಳು, ಅಕ್ಷರಳು ಎಂದರೆ ಮಾತೆ ಶ್ರೀಲಕ್ಷ್ಮಿ.

ನಿರಂತರವಾಗಿ ಮನಸ್ಸಿನಲ್ಲಿ ನೀನು ಹೇಳಿರುವ ಗುಣಗಳ ಅನುಸಂಧಾನ ಮಾಡುತ್ತಾ, ಶಾಸ್ತ್ರಗಳ ಮೂಲಕ ನಿನ್ನ ಮಹಿಮೆಯನ್ನು, ನಿನ್ನ ರೂಪ ವಿಶೇಷಗಳನ್ನು ತಿಳಿದುಕೊಂಡು, ಅದರಲ್ಲಿ ಭಕ್ತಿಯನ್ನು ಬೆಳೆಸಿಕೊಂಡು, ನಿನ್ನ ಉಪಾಸನೆ ಮಾಡಿದರೆ ಒಳ್ಳೆಯದೋ; ಅಥವಾ ಕ್ಷರಾತೀತ(ಅಕ್ಷರ)ಳಾದ ಶ್ರೀತತ್ವದ ಉಪಾಸನೆ ಒಳ್ಳೆಯದೋ. ಯಾವ ದಾರಿ ಹೆಚ್ಚು ಸೂಕ್ತ-ಎನ್ನುವುದು ಅರ್ಜುನನ ಪ್ರಶ್ನೆ.

ಭಗವಾನುವಾಚ ।

ಮಯ್ಯಾವೇಶ್ಯ ಮನೋ ಯೇ ಮಾಂ ನಿತ್ಯಯುಕ್ತಾ ಉಪಾಸತೇ ।
ಶ್ರದ್ಧಯಾ ಪರಯೋಪೇತಾಸ್ತೇ ಮೇ ಯುಕ್ತತಮಾ ಮತಾಃ ॥೨॥

ಭಗವಾನ್ ಉವಾಚ-ಭಗವಂತ ಹೇಳಿದನು:
ಮಯಿ ಆವೇಶ್ಯ ಮನಃ ಯೇ ಮಾಮ್ ನಿತ್ಯ ಯುಕ್ತಾಃ ಉಪಾಸತೇ ।
ಶ್ರದ್ಧಯಾ ಪರಯಾ ಉಪೇತಾಃ ತೇ ಮೇ ಯುಕ್ತಃ ತಮಾಃ ಮತಾಃ -ನನ್ನಲ್ಲಿ ಬಗೆಯಿಟ್ಟವರು, ತುಂಬು ನಂಬಿಕೆಯಿಂದ ಕೂಡಿ ನನ್ನನ್ನೇ ಸೇವಿಸುವ ನಿರಂತರ ಸಾಧಕರು-ಅತ್ಯಂತ ಪರಿಪೂರ್ಣರೆಂದು ಪರಿಗಣಿತರಾಗುತ್ತಾರೆ.

ಕೃಷ್ಣ ಅರ್ಜುನನ ಪ್ರಶ್ನೆಗೆ ಉತ್ತರ ಕೊಡುತ್ತಾ ಹೇಳುತ್ತಾನೆ: "ಶ್ರದ್ಧೆಯಿಂದ ಯಾರು ನನ್ನನ್ನು ಉಪಾಸನೆ ಮಾಡುತ್ತಾರೋ ಅವರು ಭಗವಂತನ ಸಾಧಕರಲ್ಲಿ ಶ್ರೇಷ್ಠರು" ಎಂದು. ಇಲ್ಲಿ ಶ್ರದ್ಧೆ ಎಂದರೆ ನಂಬಿಕೆ. ಸಾಧನೆಯಲ್ಲಿ ಬಹಳ ಮುಖ್ಯವಾದದ್ದು ಶ್ರದ್ಧೆ. ಶ್ರದ್ಧೆ ಇಲ್ಲದೆ ಉಪಾಸನೆ ಮಾಡಿ ಉಪಯೋಗವಿಲ್ಲ. ಇದು ಮನಃಶಾಸ್ತ್ರ. ಇದಕ್ಕೆ ಲೌಕಿಕವಾದ ಉದಾಹರಣೆ: ರೋಗಿ ಮತ್ತು ವೈದ್ಯರು. ಒಂದು ವೇಳೆ ರೋಗಿಗೆ ತನ್ನನ್ನು ಪರೀಕ್ಷಿಸಿ ಔಷಧ ಕೊಡುವ ವೈದ್ಯನ ಮೇಲೆ ನಂಬಿಕೆ ಇಲ್ಲದಿದ್ದರೆ, ತೆಗೆದುಕೊಳ್ಳುವ ಔಷಧ ಆತನಲ್ಲಿ ಕೆಲಸ ಮಾಡುವುದಿಲ್ಲ. ಗಾಢವಾದ ನಂಬಿಕೆ ಇದ್ದರೆ-ವೈದ್ಯ ಯಾವ ಕಾಯಿಲೆಗೆ ಯಾವ ಮದ್ದು ಕೊಟ್ಟರೂ ರೋಗ ಗುಣವಾಗುತ್ತದೆ! ಇದು ವೈಜ್ಞಾನಿಕವಾಗಿ ಕೂಡಾ ಸಾಬೀತಾಗಿರುವ ವಿಷಯ. ಆದ್ದರಿಂದ ಕೇವಲ ಕಣ್ಮುಚ್ಚಿ-ನಂಬಿಕೆ ಇಲ್ಲದೆ ಉಪಾಸನೆ ಮಾಡಿದರೆ ಉಪಯೋಗವಿಲ್ಲ. ದೃಢವಾದ ಶ್ರದ್ಧೆಯಿಂದ, ತಿಳಿದು, ಭಗವಂತನ ಗುಣರೂಪವನ್ನು ಧ್ಯಾನ ಮಾಡುವುದು ಶ್ರೇಷ್ಠ ಭಕ್ತಿ ಎನಿಸುತ್ತದೆ. ಪೂರ್ಣ ಶ್ರದ್ಧೆಯಿಂದ ಯಾವ ರೂಪದಿಂದಲೂ, ಯಾವ ನಾಮದಿಂದಲೂ ಭಗವಂತನನ್ನು ಉಪಾಸನೆ ಮಾಡಬಹುದು. ಭಗವಂತನ ರೂಪವಲ್ಲದ ರೂಪವೊಂದಿಲ್ಲ, ಭಗವಂತನ ನಾಮವಲ್ಲದ ನಾಮವೊಂದಿಲ್ಲ. ಪೂರ್ಣ ಶ್ರದ್ಧೆ ಇದ್ದಾಗ ನಾಮ-ರೂಪ ಸಮಸ್ಯೆಯಾಗುವುದಿಲ್ಲ. ಹೀಗಾಗಿ ಭಗವಂತ ಹೇಳುತ್ತಾನೆ: "ನನ್ನ ರೂಪ ಮತ್ತು ಗುಣ ವಿಶೇಷವನ್ನು ಯಾರು ಶ್ರದ್ಧೆಯಿಂದ ಉಪಾಸನೆ ಮಾಡುತ್ತಾರೋ ಅವರು ಸಾಧಕರಲ್ಲಿ ಶ್ರೇಷ್ಠರು" ಎಂದು.

ಯೇ ತ್ವಕ್ಷರಮನಿರ್ದೇಶ್ಯಮವ್ಯಕ್ತಂ ಪರ್ಯುಪಾಸತೇ ।
ಸರ್ವತ್ರಗಮಚಿಂತ್ಯಂ ಚ ಕೂಟಸ್ಥಮಚಲಂ ಧ್ರುವಮ್ ॥೩॥

ಸನ್ನಿಯಮ್ಯೇಂದ್ರಿಯಗ್ರಾಮಂ ಸರ್ವತ್ರ ಸಮಬುದ್ಧಯಃ ।
ತೇ ಪ್ರಾಪ್ನುವಂತಿ ಮಾಮೇವ ಸರ್ವಭೂತಹಿತೇ ರತಾಃ ॥೪॥

ಯೇತು ಅಕ್ಷರಮ್ ಅನಿರ್ದೇಶ್ಯಮ್ ಅವ್ಯಕ್ತಮ್ ಪರ್ಯುಪಾಸತೇ ।
ಸರ್ವತ್ರಗಮ್ ಅಚಿಂತ್ಯಮ್ ಚ ಕೂಟಸ್ಥಮ್ ಅಚಲಮ್ ಧ್ರುವಮ್ ॥
ಸನ್ನಿಯಮ್ಯ ಇಂದ್ರಿಯ ಗ್ರಾಮಮ್ ಸರ್ವತ್ರ ಸಮ ಬುದ್ಧಯಃ ।
ತೇ ಪ್ರಾಪ್ನುವಂತಿ ಮಾಮ್ ಏವ ಸರ್ವ ಭೂತ ಹಿತೇ ರತಾಃ --ಅವ್ಯಕ್ತವೂ ಅಳಿವಿರದ ತತ್ವ. ಮಾತಿಗೆ ನಿಲುಕದ, ಚಿಂತನೆಗೆ ಎಟುಕದ ತತ್ವ. ಆಗಸದಲ್ಲಿ ನೆಲೆಸಿ ಎಲ್ಲೆಡೆಯೂ ತುಂಬಿರುವಂತಾದ್ದು. ನೆಲೆಗೆಡದ ನಿರ್ವಿಕಾರವಾದ

ತತ್ವ. ಇಂದ್ರಿಯಗಳ ಗಡಣವನ್ನು ಬಿಗಿಹಿಡಿದು ಎಲ್ಲೆಡೆಯೂ ಸಮದೃಷ್ಟಿಯಿಂದ ಎಲ್ಲಾ ಪ್ರಾಣಿಗಳಿಗೆ ಒಳಿತನ್ನು ಬಯಸುತ್ತಾ ಇಂತಹ ಅವ್ಯಕ್ತತತ್ವವನ್ನು ಸೇವಿಸುವವರೂ ಕೂಡಾ ನನ್ನನ್ನೇ ಸೇರುತ್ತಾರೆ.

ಅವ್ಯಕ್ತತತ್ವ ಲಕ್ಷ್ಮಿಯ ಉಪಾಸನೆಯ ಬಗ್ಗೆ ಇಲ್ಲಿ ಕೃಷ್ಣ ವಿವರಿಸುತ್ತಾನೆ. ಲೋಕನೀತಿಗೂ ಭಗವಂತನ ಉಪಾಸನೆಯಲ್ಲೂ ಒಂದು ವ್ಯತ್ಯಾಸವಿದೆ. ಲೋಕದಲ್ಲಿ ಸಾಮಾನ್ಯವಾಗಿ ತಾಯಿ ಯಾವಾಗಲೂ ತನ್ನ ಮಕ್ಕಳ ತಪ್ಪನ್ನು ಕ್ಷಮಿಸುತ್ತಾಳೆ ಮತ್ತು ತಂದೆ ಶಿಕ್ಷಿಸುತ್ತಾನೆ. ಆದರೆ ತಾಯಿ ಶ್ರೀಲಕ್ಷ್ಮಿ ಉಪಾಸನೆ ಮತ್ತು ಭಗವಂತನ ಉಪಾಸನೆಯಲ್ಲಿ ಇದು ವ್ಯತಿರಿಕ್ತ. ಉಪಾಸನೆಯಲ್ಲಿ ಏನಾದರೂ ಲೋಪ ದೋಷಗಳಾದರೆ ಮಾತೆ ಕ್ಷಮಿಸಲಾರಳು, ಆದರೆ ಭಗವಂತ ಕ್ಷಮಿಸುತ್ತಾನೆ. ಈ ಕಾರಣಕ್ಕಾಗಿ ಅವ್ಯಕ್ತಳಾದ ಅಕ್ಷರಳ ಉಪಾಸನೆ ಕಷ್ಟ. ಇಲ್ಲಿ ಕೃಷ್ಣ ಮಾತೆ ಲಕ್ಷ್ಮಿಯನ್ನು ಉಪಾಸನೆ ಮಾಡುವವರು ತಿಳಿದಿರಬೇಕಾದ ಅಂಶಗಳನ್ನು ವಿವರಿಸುತ್ತಾನೆ. ಈ ವಿವರಣೆಯನ್ನು ಅನೇಕ ವಿಶೇಷಣಗಳನ್ನು ಬಳಸಿ ಈ ಶ್ಲೋಕದಲ್ಲಿ ವಿವರಿಸಲಾಗಿದೆ. ಅಳಿವಿರದ ದೇಹವುಳ್ಳ ಆಕೆ ಅಕ್ಷರಳು; ನಮ್ಮ ಬುದ್ಧಿಗೆ ಗೋಚರವಾಗದ ಪ್ರಕೃತಿ ಅನಿರ್ದೇಶ್ಯಳು; ಎಂದೂ ವ್ಯಕ್ತವಾಗದ ಲಕ್ಷ್ಮಿ ಅವ್ಯಕ್ತಳು. ಈ ಎಲ್ಲಾ ಗುಣಗಳು ಭಗವಂತನಿಗೂ ಅನ್ವಯವಾಗುತ್ತದೆ.

ಜಗತ್ತಿನ ಸೃಷ್ಟಿಗೆ ಮೂಲ ತತ್ವವಾದ ಆಕಾಶದಲ್ಲಿ ನೆಲೆಸಿ, ಇಡೀ ವಿಶ್ವದ ವಿಸ್ತಾರಕ್ಕೆ ಕಾರಣಳಾದವಳು ಲಕ್ಷ್ಮಿ. ಸ್ಥಿರ ಮತ್ತು ಶಾಶ್ವತವಾಗಿರುವ ಆಕೆ ಸದಾ ಭಗವಂತನ ಪಾದವನ್ನು ಸೇವಿಸುತ್ತಿರುತ್ತಾಳೆ. ಇಂತಹ ಶಕ್ತಿ ದೇವತೆಯನ್ನು ಉಪಾಸನೆ ಮಾಡಲು ಕಠೋರವಾದ ಇಂದ್ರಿಯ ನಿಗ್ರಹ ಅಗತ್ಯ. ಎಲ್ಲವನ್ನೂ ಸಮಬುದ್ಧಿಯಿಂದ ಕಾಣುತ್ತಾ, ಯಾವುದೇ ನ್ಯೂನತೆ ಇಲ್ಲದೆ ಉಪಾಸನೆ ಮಾಡುವುದು ಇಲ್ಲಿ ಅತ್ಯಗತ್ಯ. [ಉದಾಹರಣೆಗೆ ಲಲಿತ ಸಹಸ್ರನಾಮ ಪಾರಾಯಣ. ಇಲ್ಲಿ ಸ್ವಲ್ಪ ಲೋಪದೋಷವಾದರೂ ಕೂಡಾ ಅದರಿಂದ ಅನರ್ಥವಾಗುತ್ತದೆ.] ಈ ರೀತಿ ಅತ್ಯಂತ ನಿಯಮಬದ್ಧವಾಗಿ ಅವ್ಯಕ್ತತತ್ವದ ಉಪಾಸನೆಯಿಂದ ಭಗವಂತನನ್ನು ಸೇರಲು ಸಾಧ್ಯ. ಆದರೆ ಇದು ಸುಲಭ ದಾರಿ ಅಲ್ಲ ಎನ್ನುತ್ತಾನೆ ಕೃಷ್ಣ.

ಕ್ಲೇಶೋಽಧಿಕತರಸ್ತೇಷಾಮವ್ಯಕ್ತಾಸಕ್ತಚೇತಸಾಮ್ ।
ಅವ್ಯಕ್ತಾ ಹಿ ಗತಿರ್ದುಃಖಂ ದೇಹವದ್ಭಿರವಾಪ್ಯತೇ ॥೫॥

ಕ್ಲೇಶಃ ಅಧಿಕ ತರಃ ತೇಷಾಮ್ ಅವ್ಯಕ್ತ ಆಸಕ್ತ ಚೇತಸಾಮ್ ।
ಅವ್ಯಕ್ತಾ ಹಿ ಗತಿಃ ದುಃಖಮ್ ದೇಹವದ್ಭಿಃ ಅವಾಪ್ಯತೇ --ಅವ್ಯಕ್ತತತ್ವದ ಉಪಾಸನೆಯನ್ನೇ ಮೆಚ್ಚುವವರಿಗೆ ದಣಿವು ಹೆಚ್ಚು. ಅವ್ಯಕ್ತದ ಮೂಲಕ ಬಿಡುಗಡೆಯ ದಾರಿ ಸಾಧಕರಿಗೆ ಕಷ್ಟದ ಬಳಸುದಾರಿ.

ಶಕ್ತಿ ಉಪಾಸನೆ ಮಾಡುವವರಿಗೆ ಆಕೆ ಒಲಿದು ಮೋಕ್ಷ ಕರುಣಿಸುತ್ತಾಳೆ. ಆದರೆ ಅವ್ಯಕ್ತದ ಉಪಾಸನೆ ಮಾಡುವವರಿಗೆ 'ಅಧಿಕ ತರ ಕ್ಲೇಶಃ' -ಉಪಾಸನೆ ತುಂಬಾ ಕಷ್ಟ. ಇದು ನೇರ ದಾರಿಯನ್ನು ಬಿಟ್ಟು ಬಳಸುದಾರಿಯಲ್ಲಿ ಭಗವಂತನೆಡೆಗೆ ಪಯಣಿಸಿದಂತೆ. ಸಾಧಕರು ಇದನ್ನು ಬಹಳ ಕಷ್ಟದಿಂದ ಸಾಧಿಸಬೇಕು.

ಮುಂದಿನ ಶ್ಲೋಕಗಳಲ್ಲಿ ಕೃಷ್ಣ ನೇರ ಭಗವಂತನ ಉಪಾಸನೆ ಎಷ್ಟು ಸುಲಭ ಎನ್ನುವುದನ್ನು ವಿವರಿಸುತ್ತಾನೆ. ಇದು ಭಗವಂತ ನಮಗೆ ತೋರಿಸಿಕೊಟ್ಟ ಸುಲಭ ಭಕ್ತಿ ಮಾರ್ಗ.

ಯೇ ತು ಸರ್ವಾಣಿ ಕರ್ಮಾಣಿ ಮಯಿ ಸಂನ್ಯಸ್ಯ ಮತ್ಪರಾಃ ।
ಅನನ್ಯೇನೈವ ಯೋಗೇನ ಮಾಂ ಧ್ಯಾಯಂತ ಉಪಾಸತೇ ॥೬॥
ತೇಷಾಮಹಂ ಸಮುದ್ಧರ್ತಾ ಮೃತ್ಯುಸಂಸಾರಸಾಗರಾತ್ ।
ಭವಾಮಿ ನಚಿರಾತ್ ಪಾರ್ಥ ಮಯ್ಯಾವೇಶಿತಚೇತಸಾಮ್ ॥೭॥

ಯೇ ತು ಸರ್ವಾಣಿ ಕರ್ಮಾಣಿ ಮಯಿ ಸಂನ್ಯಸ್ಯ ಮತ್ ಪರಾಃ ।
ಅನನ್ಯೇನ ಏವ ಯೋಗೇನ ಮಾಮ್ ಧ್ಯಾಯಂತಃ ಉಪಾಸತೇ ॥
ತೇಷಾಮ್ ಅಹಂ ಸಮುದ್ಧರ್ತಾ ಮೃತ್ಯು ಸಂಸಾರ ಸಾಗರಾತ್ ।
ಭವಾಮಿ ನಚಿರಾತ್ ಪಾರ್ಥ ಮಯ್ಯಾವೇಶಿತಚೇತಸಾಮ್ --ಕೆಲವರಿರುತ್ತಾರೆ: ಅವರು ಮಾಡಿದ್ದನ್ನೆಲ್ಲಾ ನನ್ನಲ್ಲಿ ಅರ್ಪಿಸಿಬಿಡುತ್ತಾರೆ. ಅವರು ನನ್ನಲ್ಲೇ ಬಗೆಯಿಟ್ಟವರು. ಅವರ ಸಾಧನೆಯ ಗುರಿ ನಾನಲ್ಲದೆ ಬೇರಿಲ್ಲ. ನನ್ನನ್ನೇ ನೆನೆಯುತ್ತಾ ಸೇವಿಸುತ್ತಾರೆ. ಓ ಪಾರ್ಥಾ, ನನ್ನನ್ನೇ ನೆಚ್ಚಿದ ಅಂತವರನ್ನು ನಾನು ಬಹುಬೇಗ ಸಾವಿನ ಬಾಳಿನ ಕಡಲಿನಿಂದ ಬಿಡುಗಡೆಗೊಳಿಸುತ್ತೇನೆ.

ಕೃಷ್ಣ ಹೇಳುತ್ತಾನೆ: "ನನ್ನನ್ನು ಸೇರುವ ಸುಲಭ ಸಾಧನವೆಂದರೆ-ನೀನು ಜೀವನ ನಿರ್ವಹಣೆಗಾಗಿ ಯಾವ ಕ್ರಿಯೆಯನ್ನು ಮಾಡುತ್ತೀಯೋ ಅದನ್ನು ನನ್ನಲ್ಲಿ ಅರ್ಪಿಸುವುದು" ಎಂದು. ಇಲ್ಲಿ ಕೃಷ್ಣ ಹೇಳುತ್ತಿರುವುದು ನಮ್ಮ ಪ್ರತಿಯೊಂದು ಕ್ರಿಯೆಯ ಹಿಂದಿರಬೇಕಾದ ಅನುಸಂಧಾನವನ್ನು. ಈ ಕಾರ್ಯವನ್ನು ಭಗವಂತ ನನ್ನ ಕೈಯಿಂದ ಮಾಡಿಸಿದ-ಇದು ಅವನಿಗರ್ಪಿತವಾಗಲಿ ಎನ್ನುವ ಅನುಸಂಧಾನ. ಈ ರೀತಿ ಇದ್ದಾಗ ನಾವು ಭಗವಂತನ ಪೂರ್ಣಾನುಗ್ರಹಕ್ಕೆ ಪಾತ್ರರಾಗಬಹುದು. ಇಲ್ಲಿ ನಮ್ಮಲ್ಲಿರಬೇಕಾದ ಅತಿ ಮುಖ್ಯ ಅಂಶವೆಂದರೆ ಭಗವಂತನನ್ನು ಅನನ್ಯವಾಗಿ ಏಕನಿಷ್ಠೆಯಿಂದ ಉಪಾಸನೆ ಮಾಡುವುದು. ನಮ್ಮ ಸಾಧನೆಯಲ್ಲಿ ಕೊರತೆ ಇರಬಹುದು, ಇಂದ್ರಿಯ ನಿಗ್ರಹ ಕಷ್ಟವಾಗಬಹುದು, ಸರ್ವಭೂತ ಹಿತಚಿಂತನೆ ಆಗದೇ ಇರಬಹುದು, ಚಿಂತನೆಯಲ್ಲಿ ಲೋಪದೋಷಗಳಿರಬಹುದು, ಏಕಾಗ್ರತೆ ಬಾರದೇ ಇರಬಹುದು. ಆದರೆ ಇಲ್ಲಿ ಕೃಷ್ಣನ ಭರವಸೆ ಏನೆಂದರೆ "ನನ್ನಲ್ಲಿ ಶರಣಾಗು, ನಿನ್ನ ಮನಸ್ಸನ್ನು ನನ್ನಲ್ಲಿ ನೆಡು-ನಾನು ನಿನ್ನನ್ನು ಉದ್ಧರಿಸುತ್ತೇನೆ" ಎನ್ನುವುದು. ನಮ್ಮ ಚಿತ್ತದಲ್ಲಿ ಭಗವಂತನನ್ನು ನೆಲೆಗೊಳಿಸಿದಾಗ ಭಗವಂತ ನಮ್ಮನ್ನು ಈ ಹುಟ್ಟು ಸಾವಿನ ಸಂಸಾರ ಸಾಗರದಿಂದ ಪಾರು ಮಾಡುವ ಜವಾಬ್ಧಾರಿಯನ್ನು ವಹಿಸುತ್ತಾನೆ.

ಮಯ್ಯೇವ ಮನ ಆಧತ್ಸ್ವ ಮಯಿ ಬುದ್ಧಿಂ ನಿವೇಶಯ।
ನಿವಸಿಷ್ಯಸಿ ಮಯ್ಯೇವ ಅತ ಊರ್ಧ್ವಂ ನ ಸಂಶಯಃ ॥೮॥

ಮಯಿ ಏವ ಮನಃ ಆಧತ್ಸ್ವ ಮಯಿ ಬುದ್ಧಿಮ್ ನಿವೇಶಯ।
ನಿವಸಿಷ್ಯಸಿ ಮಯಿ ಏವ ಅತಃ ಊರ್ಧ್ವಮ್ ನ ಸಂಶಯಃ -- ನನ್ನಲ್ಲೇ ಬಗೆಯಿಡು. ನನ್ನಲ್ಲಿ ತಿಳಿವನ್ನು ನಿಲಿಸು. ಅದರ ಫಲವಾಗಿ ಮುಂದೆ ನನ್ನಲ್ಲೇ ನೆಲೆಸುವೆ. ಇದಕೆ ಸಂಶಯವಿಲ್ಲ.

ಕೃಷ್ಣ ಹೇಳುತ್ತಾನೆ: ಮನಸ್ಸನ್ನು ನನ್ನಲ್ಲಿ ಆಧಾನ ಮಾಡು ಎಂದು. 'ಆಧಾನ' ಎಂದರೆ ಬೀಜ ಬಿತ್ತುವುದು ಅಥವಾ ಕಿಡಿ ಹಚ್ಚುವುದು. ಮನಸ್ಸಿಗೆ ಭಗವಂತನ ಭಕ್ತಿಯ ಕಿಡಿಯನ್ನು ಹಚ್ಚಿ ಅದು ಪ್ರಜ್ವಲಿಸುವಂತೆ ಮಾಡಬೇಕು. ಭಕ್ತಿಯ ಬೀಜ ಬೆಳೆಯುವಂತೆ ಪೋಷಿಸಬೇಕು. ನಿಶ್ಚಯಜ್ಞಾನ ಬುದ್ಧಿಯಲ್ಲಿ ಗಟ್ಟಿಗೊಳ್ಳಬೇಕು. ಈ ರೀತಿ ಸದಾ ಮನಸ್ಸನ್ನು ಭಗವಂತನಲ್ಲಿ ನೆಲೆಗೊಳಿಸಿದಾಗ, ಯಾವುದೇ ಕ್ಲೇಶವಿಲ್ಲದೆ ಭಗವಂತನನ್ನು ಸೇರಬಹುದು. ಇದು ಶಕ್ತಿ ಉಪಾಸನೆಗಿಂತ ಭಗವಂತನ ಉಪಾಸನೆ ಎಷ್ಟು ಸುಲಭ ಎನ್ನುವುದರ ವಿವರಣೆ. ಭಗವಂತನ ಉಪಾಸನೆಗೆ ಕಟ್ಟುಪಾಡು ನಿರ್ಬಂಧ ಬಹಳ ಕಡಿಮೆ. ಉದಾಹರಣೆಗೆ ವಿಷ್ಣುಸಹಸ್ರನಾಮ ಪಾರಾಯಣ. ವಿಷ್ಣುಸಹಸ್ರನಾಮ ಚಿಂತನೆಗೆ ಯಾವುದೇ ನಿರ್ದಿಷ್ಟ ಸಮಯದ ನಿರ್ಬಂಧವಿಲ್ಲ. ಯಾರು ಬೇಕಾದರೂ ಯಾವ ಕಾಲದಲ್ಲಿ ಕೂಡಾ ವಿಷ್ಣುಸಹಸ್ರನಾಮ ಪಠಿಸಬಹುದು. ಸರ್ವ ರೋಗಕ್ಕೆ ಮದ್ದು ವಿಷ್ಣುಸಹಸ್ರನಾಮ. ಭಗವಂತನ ಚಿಂತನೆಯಲ್ಲಿ ತಿಳಿಯದೇ ಆಗುವ ಲೋಪದೋಷಗಳಿಗೆ ಕ್ಷಮೆಯಿದೆ.
ನಾರಾಯಣನ ಉಪಾಸನೆ ಎಂದರೆ ಅದು ಲಕ್ಷ್ಮಿಸಮೇತ ನಾರಾಯಣನ ಉಪಾಸನೆ. ನಾರಾಯಣನನ್ನು ಉಪಾಸನೆ ಮಾಡುವವರು ಲಕ್ಷ್ಮಿಯನ್ನು, ಇತರ ದೇವತೆಗಳನ್ನು ಪ್ರತ್ಯೇಕ ಉಪಾಸನೆ ಮಾಡುವ ಅಗತ್ಯವಿಲ್ಲ. ಲಕ್ಷ್ಮಿಗೆ ಮತ್ತು ಸರ್ವ ದೇವತೆಗಳಿಗೆ ಅತ್ಯಂತ ಪ್ರೀತಿಪೂರ್ವಕವಾದದ್ದು-ಭಗವಂತನ ಉಪಾಸನೆ . ನಾರಾಯಣನ ಉಪಾಸನೆ ಮಾಡುವ ಸಾಧಕನಿಗೆ ಸಕಲ ದೇವತೆಗಳು ಸಹಾಯಮಾಡಿ, ಆತ ತನ್ನ ಸಾಧನಾ ಮಾರ್ಗದಲ್ಲಿ ಎತ್ತರಕ್ಕೇರುವಂತೆ ಮಾಡುತ್ತಾರೆ. ಇದನ್ನು ತಿಳಿದಾಗ ನಮ್ಮ ಉಪಾಸನೆಯಲ್ಲಿ ನಾವು ಸುಲಭವಾಗಿ ಏಕಭಕ್ತಿಯನ್ನು ಸಾಧಿಸಬಹುದು. ಭಕ್ತಿ ಮಾರ್ಗದಲ್ಲಿ ಗಟ್ಟಿಗೊಳ್ಳಬಹುದು.

ಅಥ ಚಿತ್ತಂ ಸಮಾಧಾತುಂ ನ ಶಕ್ನೋಷಿ ಮಯಿ ಸ್ಥಿರಮ್ ।
ಅಭ್ಯಾಸಯೋಗೇನ ತತೋ ಮಾಮಿಚ್ಛಾಽಪ್ತುಂ ಧನಂಜಯ ॥೯॥

ಅಥ ಚಿತ್ತಮ್ ಸಮಾಧಾತುಮ್ ನ ಶಕ್ನೋಷಿ ಮಯಿ ಸ್ಥಿರಮ್।
ಅಭ್ಯಾಸಯೋಗೇನ ತತಃ ಮಾಮ್ ಇಚ್ಛಾ ಆಪ್ತುಂ ಧನಂಜಯ -ಧನಂಜಯಾ, ಒಂದೊಮ್ಮೆ ನನ್ನಲ್ಲಿ ಒಳಬಗೆಯನ್ನು ಗಟ್ಟಿಗೊಳಿಸಲು ಸಾಧ್ಯವಾಗದಿದ್ದರೆ, ಆಗ ಮರಳಿಮರಳಿ ಅಭ್ಯಾಸದ ಬಳಕೆಯಿಂದ ನನ್ನನ್ನು ಸೇರುವ ಬಯಕೆಯನ್ನು ಬೆಳೆಸಿಕೋ.

ಮನಸ್ಸಿನಲ್ಲಿ ಭಗವಂತನ ಬಗ್ಗೆ ಭಕ್ತಿ ಇದೆ, ಬುದ್ಧಿಯಲ್ಲಿ ಜ್ಞಾನಪೂರ್ಣ ಭಕ್ತಿಯ ಅಂಕುರವಿದೆ. ಆದರೂ ಕೂಡಾ ಸ್ಥಿರವಾದ ಸ್ಮರಣೆ ಬರುತ್ತಿಲ್ಲ, ಮನಸ್ಸು ಗಟ್ಟಿಯಾಗಿ ನೆಲೆಗೊಳ್ಳುತ್ತಿಲ್ಲ ಆಗ ಏನು ಮಾಡುವುದು? ಶಾಸ್ತ್ರದಲ್ಲಿ ಹೇಳುವಂತೆ:

ಸ್ಮರ್ತವ್ಯಃ ಸತತಂ ವಿಷ್ಣುಃ ವಿಸ್ಮರ್ತವ್ಯೋ ನ ಜಾತುಚಿತ್ ।
ಸರ್ವೇ ವಿಧಿ ನಿಷೇಧಾಸ್ಸ್ಯುಹುಃ ಏತಯೋರೇವ ಕಿಂಕರಾಃ ॥

ಅಂದರೆ 'ನಾವು ನಿರಂತರ ಭಗವಂತನನ್ನು ನೆನಪಿನಲ್ಲಿಡಬೇಕು, ಎಂದೂ ಭಗವಂತನನ್ನು ಮರೆಯಬಾರದು'. ಸಮಸ್ತ ವಿಧಿನಿಷೇಧ ಹೇಳುವುದು ಕೂಡಾ ಇದನ್ನೇ. ಮನಸ್ಸು ನಿರಂತರ ಭಗವಂತನಲ್ಲಿ ನಿಲ್ಲದೇ ಈ ಅಖಂಡ ಸ್ಮರಣೆ ಸಾಧ್ಯವಿಲ್ಲ. ಇಂತಹ ಸಂದರ್ಭದಲ್ಲಿ ಏನು ಮಾಡಬೇಕು ಎನ್ನುವುದನ್ನು ಕೃಷ್ಣ ವಿವರಿಸುತ್ತಾನೆ. "ಮನಸ್ಸನ್ನು ಏಕಾಗ್ರತೆಯೆಡೆಗೆ ಕೊಂಡೊಯ್ಯುವ ಶಕ್ತಿ ಕೊಡು ಎಂದು ನನ್ನನ್ನು ಪ್ರಾರ್ಥಿಸು. ಅಧ್ಯಾತ್ಮದ ದಾರಿಯಲ್ಲಿ ಏನು ಇಚ್ಛೆ ಮಾಡಿದರೂ ಅದನ್ನು ಪೂರೈಸುವ ಜವಾಬ್ಧಾರಿ ನನ್ನದು" ಎನ್ನುವ ಭರವಸೆ ಕೃಷ್ಣನದು. ಅಭ್ಯಾಸ ಮತ್ತು ಇಚ್ಛೆ ಇದ್ದರೆ ಖಂಡಿತವಾಗಿ ಏಕಾಗ್ರತೆ ಸಾಧ್ಯ. ನಾವು ಹೇಗೆ ಮಕ್ಕಳಿಗೆ ತರಬೇತಿಕೊಟ್ಟು, ಅಭ್ಯಾಸ ಮಾಡಿಸಿ ಕಲಿಸುತ್ತೇವೋ, ಹಾಗೆ ನಮ್ಮ ಮನಸ್ಸನ್ನು ರಮಿಸಿರಮಿಸಿ ಬುದ್ಧಿವಾದ ಹೇಳಿ ಅಭ್ಯಾಸಮಾಡಿಸಬೇಕು. ಹೀಗೆ ಮಾಡಿದಾಗ ಮನಸ್ಸು ಅದನ್ನು ರೂಢಿ ಮಾಡಿಕೊಳ್ಳುತ್ತದೆ. ಮೊದಲು ನಾವು ಲೌಕಿಕ ಸಂಪತ್ತಿನ ಬೆನ್ನುಹತ್ತುವುದನ್ನು ಬಿಟ್ಟು, ಭಗವಂತನೆಂಬ ಅಮೂಲ್ಯ ಧನವನ್ನು ಗೆಲ್ಲುವ ಧನಂಜಯರಾಗಬೇಕು.

ಅಭ್ಯಾಸೇಽಪ್ಯಸಮರ್ಥೋಽಸಿ ಮತ್ಕರ್ಮಪರಮೋ ಭವ ।
ಮದರ್ಥಮಪಿ ಕರ್ಮಾಣಿ ಕುರ್ವನ್ ಸಿದ್ಧಿಮವಾಪ್ಸ್ಯಸಿ ॥೧೦॥

ಅಭ್ಯಾಸೇ ಅಪಿ ಅಸಮರ್ಥಃ ಅಸಿ ಮತ್ ಕರ್ಮ ಪರಮಃ ಭವ ।
ಮತ್ ಅರ್ಥಮ್ ಅಪಿ ಕರ್ಮಾಣಿ ಕುರ್ವನ್ ಸಿದ್ಧಿಮ್ ಅವಾಪ್ಸ್ಯಸಿ -ಧ್ಯಾನದ ಅಭ್ಯಾಸವೂ ಅಸಾಧ್ಯವಾದರೆ ನನ್ನ ಆರಾಧನಾ ರೂಪವಾದ ಕರ್ಮಗಳಲ್ಲೇ ತೊಡಗು. ಕರ್ಮವನ್ನು ನನ್ನ ಪೂಜೆಯೆಂದು ಮಾಡಿಯೂ ಸಿದ್ಧಿಪಡೆಯಬಲ್ಲೆ.

ಕೆಲವರಿಗೆ ಎಷ್ಟೇ ಅಭ್ಯಾಸ ಮಾಡಿದರೂ ಏಕಭಕ್ತಿ ಸಾಧ್ಯವಾಗುವುದಿಲ್ಲ. ಅಧ್ಯಾತ್ಮ ಮಾರ್ಗದ ಸಾಧನೆಯಲ್ಲಿ ಮನಸ್ಸಿಗೆ ಒಂದು ಜನ್ಮದ ಅಭ್ಯಾಸ ಸಾಕಾಗುವುದಿಲ್ಲ. ಕೆಲವೊಮ್ಮೆ ಇಡೀ ಜನ್ಮ ಅಭ್ಯಾಸ ಮಾಡಿದರೂ ಏಕಾಗ್ರತೆ ಬಾರದೇ ಇರಬಹುದು. ಇಂತವರಿಗೆ ಕರುಣಾಳು ಕೃಷ್ಣ ಹೇಳುತ್ತಾನೆ: "ನೀನು ಮಾಡುವ ಕರ್ಮವನ್ನು ಸ್ವಾರ್ಥಕ್ಕಾಗಿ ಮಾಡದೆ, ಭಗವಂತನ ಪೂಜೆ ಅನ್ನುವ ಅನುಸಂಧಾನದಿಂದ ಮಾಡು" ಎಂದು. ತನ್ನ ದೈನಂದಿನ ಪ್ರತೀ ಕರ್ಮವನ್ನು ಅರ್ಪಣಾಭಾವದಿಂದ ಭಗವಂತನ ಪೂಜೆ ಎಂದು ಮಾಡಿ, ಅಧ್ಯಾತ್ಮ ಮಾರ್ಗದಲ್ಲಿ ಸಿದ್ಧಿ ಪಡೆಯಬಹುದು.

ಅಥೈತದಪ್ಯಶಕ್ತೋಽಸಿ ಕರ್ತುಂ ಮದ್ಯೋಗಮಾಶ್ರಿತಃ ।
ಸರ್ವಕರ್ಮಫಲತ್ಯಾಗಂ ತತಃ ಕುರು ಯತಾತ್ಮವಾನ್ ॥೧೧॥

ಅಥ ಏತತ್ ಅಪಿ ಆಶಕ್ತಃ ಅಸಿ ಕರ್ತುಮ್ ಮತ್ ಯೋಗಮ್ ಆಶ್ರಿತಃ ।
ಸರ್ವಕರ್ಮ ಫಲ ತ್ಯಾಗಮ್ ತತಃ ಕುರು ಯತ ಆತ್ಮವಾನ್ -ಇದನ್ನೂ ಮಾಡುವುದಾಗದಿದ್ದರೆ ಎಲ್ಲಾ ಬಗೆಯ ಕರ್ಮಗಳನ್ನೂ ನನಗೆ ಅರ್ಪಿಸುವ ಸಾಧನೆ ಮಾಡು. ಅನಂತರ ಬಗೆಯನ್ನು ಬಿಗಿಗೊಳಿಸಿ ಎಲ್ಲಾ ಕರ್ಮಗಳ ಫಲದಾಸೆಯ ನಂಟನ್ನು ತೊರೆದುಬಿಡು.

ಒಂದು ವೇಳೆ ಮೇಲೆ ಹೇಳಿದ ರೀತಿ ಎಲ್ಲಾ ಕರ್ಮವನ್ನು ಭಗವಂತನಿಗೆ ಅರ್ಪಿಸಲು ಸಾಧ್ಯವಾಗದೇ ಇದ್ದರೆ, ಎಲ್ಲವನ್ನೂ ಭಗವಂತನ ಪೂಜೆಯಾಗಿ ಮಾಡಲು ಸಾಧ್ಯವಾಗದೇ ಇದ್ದರೆ, ಯಾರನ್ನಾದರೂ ಪೂಜಿಸು-ಆದರೆ ಕೊನೆಗೆ ಸರ್ವ ಕರ್ಮವನ್ನು ಕರ್ಮಫಲದ ಬಯಕೆಯಿಲ್ಲದೆ ಭಗವಂತನಿಗೆ ಅರ್ಪಿಸು ಎನ್ನುತ್ತಾನೆ ಕೃಷ್ಣ. ಇಲ್ಲಿ ಕರ್ಮಫಲದ ತ್ಯಾಗಕ್ಕೆ ಮತ್ತು ಅರ್ಪಣೆಗೆ ಕೃಷ್ಣ ಒತ್ತು ಕೊಟ್ಟಿದ್ದಾನೆ.

ಶ್ರೇಯೋ ಹಿ ಜ್ಞಾನಮಭ್ಯಾಸಾಜ್ ಜ್ಞಾನಾದ್ ಧ್ಯಾನಂ ವಿಶಿಷ್ಯತೇ ।
ಧ್ಯಾನಾತ್ ಕರ್ಮಫಲತ್ಯಾಗಸ್ತ್ಯಾಗಾಚ್ಛಾಂತಿರನಂತರಮ್ ॥೧೨॥

ಶ್ರೇಯಃ ಹಿ ಜ್ಞಾನಮ್ ಅಭ್ಯಾಸಾತ್ ಜ್ಞಾನಾತ್ ಧ್ಯಾನಮ್ ವಿಶಿಷ್ಯತೇ ।
ಧ್ಯಾನಾತ್ ಕರ್ಮ ಫಲ ತ್ಯಾಗಃ ತ್ಯಾಗಾತ್ ಶಾಂತಿಃ ಅನಂತರಮ್ -ಅರಿವಿಲ್ಲದ ಅಭ್ಯಾಸಕ್ಕಿಂತ ಅರಿವು ಮಿಗಿಲು. ಬರಿದೆ ಅರಿವಿಗಿಂತ ಅರಿತು ಧ್ಯಾನಿಸುವುದು ಮಿಗಿಲು. ಬರಿದೆ ಧ್ಯಾನಕ್ಕಿಂತ ಕರ್ಮಫಲದ ನಂಟಿರದ ಧ್ಯಾನ ಮಿಗಿಲು. ಅಂತಹ ಧ್ಯಾನದ ಮುಂದಿನ ಮಜಲೇ ಮುಕ್ತಿ.

ಜ್ಞಾನವಿಲ್ಲದ ಧ್ಯಾನಕ್ಕಿಂತ ಜ್ಞಾನ ಶ್ರೇಷ್ಠ. ಜ್ಞಾನ ಅಧ್ಯಾತ್ಮ ಸಾಧನೆಯಲ್ಲಿ ಮೂಲಭೂತ ಅವಶ್ಯಕತೆ(Fundamental requirement). ಜ್ಞಾನವಿಲ್ಲದೆ ಧ್ಯಾನ ಅಥವಾ ಕರ್ಮ ಮಾಡಿ ಉಪಯೋಗವಿಲ್ಲ. ತಿಳುವಳಿಕೆ ಇಲ್ಲದ ಶ್ರದ್ಧೆ ಅಂಧಃಶ್ರದ್ಧೆಯಾಗುತ್ತದೆ. ಹಾಗೆ ನಂಬಿಕೆ ಇಲ್ಲದ ತಿಳುವಳಿಕೆ ಅಹಂಕಾರವೆನಿಸುತ್ತದೆ. ಆದ್ದರಿಂದ ತಿಳಿಯಬೇಕು, ತಿಳಿದು ನಂಬಬೇಕು. ಕೇವಲ ತಿಳುವಳಿಕೆ ಇದ್ದರೆ ಸಾಲದು. ಜ್ಞಾನಕ್ಕಿಂತ ಜ್ಞಾನ ಸಹಿತ ಧ್ಯಾನ ಮೇಲು. ಎಲ್ಲಕ್ಕಿಂತ ಹಿರಿದು ಕರ್ಮಫಲ ತ್ಯಾಗ. ಆದ್ದರಿಂದ ಮೊದಲು ತಿಳಿದುಕೋ, ತಿಳಿದು ಅಭ್ಯಾಸ ಮಾಡು. ಆದರೆ ನಿನ್ನ ಧ್ಯಾನ ಕರ್ಮಫಲವಿಲ್ಲದ ಧ್ಯಾನವಾಗಿರಲಿ. ಈ ರೀತಿಯ ಜೀವನ ಶೈಲಿಯಿಂದ ಮೋಕ್ಷಪ್ರಾಪ್ತಿ ಸಾಧ್ಯ.
ಇಲ್ಲಿಯ ತನಕ ಭಗವಂತನ ಉಪಾಸನೆ ಹೇಗಿರಬೇಕು ಎನ್ನುವುದನ್ನು ವಿವರಿಸಿದ ಕೃಷ್ಣ, ಮುಂದೆ ನಾವು ದೇವರು ಮೆಚ್ಚುವ ಬದುಕನ್ನು ಬದುಕಬೇಕಾದರೆ ಯಾವ ರೀತಿ ನಮ್ಮ ಬದುಕನ್ನು ರೂಪಿಸಿಕೊಳ್ಳಬೇಕು, ನಮ್ಮ ಜೀವನಕ್ರಮ ಮತ್ತು ಅನುಷ್ಠಾನ ಹೇಗಿರಬೇಕು ಎನ್ನುವುದನ್ನು ವಿವರಿಸುತ್ತಾನೆ.

ಅದ್ವೇಷ್ಟಾ ಸರ್ವಭೂತಾನಾಂ ಮೈತ್ರಃ ಕರುಣ ಏವ ಚ ।

ನಿರ್ಮಮೋ ನಿರಹಂಕಾರಃ ಸಮದುಃಖಸುಖಃ ಕ್ಷಮೀ ॥೧೩॥
ಸಂತುಷ್ಟಃ ಸತತಂ ಯೋಗೀ ಯತಾತ್ಮಾ ದೃಢನಿಶ್ಚಯಃ ।
ಮಯ್ಯರ್ಪಿತಮನೋಬುದ್ಧಿರ್ಯೋ ಮದ್ಭಕ್ತಃ ಸ ಮೇ ಪ್ರಿಯಃ ॥೧೪॥

ಅದ್ವೇಷ್ಟಾ ಸರ್ವಭೂತಾನಾಂ ಮೈತ್ರಃ ಕರುಣಃ ಏವ ಚ ।
ನಿರ್ಮಮಃ ನಿರಹಂಕಾರಃ ಸಮದುಃಖಸುಖಃ ಕ್ಷಮೀ ॥
ಸಂತುಷ್ಟಃ ಸತತಮ್ ಯೋಗೀ ಯತಾತ್ಮಾ ದೃಢನಿಶ್ಚಯಃ ।
ಮಯಿ ಅರ್ಪಿತ ಮನಃ ಬುದ್ಧಿಃ ಯಃ ಮತ್ ಭಕ್ತಃ ಸಃ ಮೇ ಪ್ರಿಯಃ –ಯಾವ ಜೀವಿಗಳಲ್ಲು ಹಗೆಯಿರದವನು, ಎಲ್ಲರ ನೇಹಿಗನು, ದುಃಖವನ್ನು ಕಂಡು ಕರಗುವವನು, ನಾನು-ನನ್ನದು ಎಂಬ ಹಮ್ಮಿರದವನು, ಸುಖದಲ್ಲಿ ಹಿಗ್ಗದವನು, ದುಃಖದಲ್ಲಿ ಕುಗ್ಗದವನು, ತಾಳ್ಮೆ ತಪ್ಪದವನು, ಯಾವಾಗಲೂ ತೃಪ್ತಿಯಿಂದಿರುವವನು, ಧ್ಯಾನಸಾಧನೆಯಲ್ಲಿ ತೊಡಗಿದವನು, ಬಗೆ ಬಿಗಿ ಹಿಡಿದವನು, ತತ್ವದ ನಿರ್ಧಾರದಿಂದ ಬಗೆ ಗಟ್ಟಿಗೊಂಡವನು, ಬಗೆ-ತಿಳಿವುಗಳನ್ನು ನನ್ನಲ್ಲಿ ಅರ್ಪಿಸಿದವನು- ಇಂತಹ ನನ್ನ ಭಕ್ತ ನನಗೆ ಅಚ್ಚುಮೆಚ್ಚು.

ಭಗವಂತ ಮೆಚ್ಚುವ ಮಾನವ ವರ್ತನೆಯ ಬಗ್ಗೆ ಕೃಷ್ಣ ವಿವರಿಸುತ್ತಾ ಮೊದಲನೆಯದಾಗಿ ಹೇಳುತ್ತಾನೆ: "ಅದ್ವೇಷ್ಟಾ ಸರ್ವಭೂತಾನಾಂ"ಎಂದು. ಅಂದರೆ ಯಾರನ್ನೂ ದ್ವೇಷಿಸದಿರುವುದು. ಇದು ಭಗವದ್ಭಕ್ತನಲ್ಲಿ ಇರಬೇಕಾದ ಮೊದಲನೇ ಗುಣ. ದ್ವೇಷದಲ್ಲಿ ಎರಡು ವಿಧ. ಒಂದು ಒಳ್ಳೆಯವರನ್ನು(ಅವರ ಉದ್ಧಾರವನ್ನು ಕಂಡು) ದ್ವೇಷಿಸುವುದು; ಇನ್ನೊಂದು ಕೆಟ್ಟವರನ್ನು(ಅವರ ಕೆಟ್ಟತನವನ್ನು ಕಂಡು) ದ್ವೇಷಿಸುವುದು. ದ್ವೇಷ ಬರುವುದು ಅಸಹನೆ ಮತ್ತು ಹೊಟ್ಟೆಕಿಚ್ಚಿನಿಂದಾಗಿ. ಇನ್ನೊಬ್ಬರ ಉತ್ಕರ್ಷವನ್ನು ಕಂಡು ಸಂಕಟಪಡುವುದು ದ್ವೇಷ. ಒಳ್ಳೆಯವನಿರಲಿ, ಕೆಟ್ಟವನಿರಲಿ-ಹೊಟ್ಟೆಕಿಚ್ಚು ಅಸಹನೆ ಬೇಡ. ಎಲ್ಲಿ ಒಳ್ಳೆಯತನವಿದೆ ಅದನ್ನು ಪ್ರೀತಿಸು, ಸ್ನೇಹ ಬೆಳೆಸು. ದುಷ್ಟರನ್ನು ದೂರ ಬಿಟ್ಟುಬಿಡು; ಒಳ್ಳೆಯತನವನ್ನು, ಒಳ್ಳೆಯವರನ್ನು ಪ್ರೀತಿಸು. ಇನ್ನೊಬ್ಬರ ಕಷ್ಟವನ್ನು ಕಂಡು ಕರಗು. ನಾನು, ನನ್ನದು ,ನನ್ನಿಂದ ಎನ್ನುವ ಅಹಂಕಾರ ಮಮಕಾರವನ್ನು ಬಿಟ್ಟುಬಿಡು. 'ಈಶಾವಾಸ್ಯಂ ಇದಮ್ ಸರ್ವಂ' –ಎಲ್ಲವುದರ ಒಡೆಯ ಆ ಭಗವಂತ. ಆತ ಕೊಟ್ಟಿರುವುದರಿಂದ ಇದೆ ಎನ್ನುವ ಮನೋಭಾವ ಇರಲಿ. ಹೇಗೆ ಅಹಂಕಾರ ಒಳ್ಳೆಯದಲ್ಲವೋ ಹಾಗೇ ಅತಿಯಾದ ಮಮಕಾರ ಒಳ್ಳೆಯದಲ್ಲ. ಪುರಂದರದಾಸರಂತೆ ಪ್ರೀತಿಯಲ್ಲಿ ನಿರ್ಲಿಪ್ತತೆ(Detached attachment)ಇರಲಿ. ಪುರಂದರದಾಸರಿಗೆ ಒಬ್ಬ ಮಗನಿದ್ದ. ಅವರು ಆತನನ್ನು ಪ್ರೀತಿಯಿಂದ ನೋಡಿಕೊಳ್ಳುತ್ತಿದ್ದರು. ಒಂದು ದಿನ ಪ್ರೀತಿಯ ಮಗ ಸತ್ತು ಹೋದ. ಆಗ ಅವರು "ಗಿಳಿಯು ಪಂಜರದೊಳಿಲ್ಲ-ನೀನು ಕೊಟ್ಟ ಗಿಳಿ ನಿನ್ನನ್ನು ಸೇರಿತು" ಎಂದು ನಿರ್ಲಿಪ್ತರಾಗಿ ಬದುಕಿದರು. ನಾವು ದುಃಖ-ಸುಖವನ್ನು ಕಾಣುವುದರಲ್ಲಿ ಸಮತೋಲನ ಸಾಧಿಸಬೇಕು. ಸುಖ ಬಂದಾಗ ಹಾರಾಟ ಬೇಡ. ದುಃಖ ಬಂದಾಗ ಕುಸಿಯದೆ ಬಂದದ್ದನ್ನು ಎದುರಿಸಬೇಕು. ಇನ್ನೊಬ್ಬರ ಮೇಲೆ ಕ್ಷಮಾ ಭಾವನೆ ಇರಲಿ. ಪ್ರತೀಕಾರ ಬೇಡ. [ತಪ್ಪು ಮಾಡಿದವರನ್ನು ನ್ಯಾಯಾಧೀಶರು, ಅಧಿಕಾರಿಗಳು ದಂಡಿಸಬಹುದು. ಅದು ಅವರ ಕರ್ತವ್ಯಧರ್ಮ-ಅಲ್ಲಿ ಪ್ರತೀಕಾರವಿಲ್ಲ].

ಮುಂದುವರಿದು ಕೃಷ್ಣ ಹೇಳುತ್ತಾನೆ: "ಸಂತುಷ್ಟಃ ಸತತಂ ಯೋಗೀ ಯತಾತ್ಮಾ ದೃಢನಿಶ್ಚಯಃ" ಎಂದು. ಯಾವುದೇ ಒಬ್ಬ ಮನುಷ್ಯ ಹಾಯಾಗಿರಬೇಕಾದರೆ ಇರಬೇಕಾದ ಚಿತ್ತವೃತ್ತಿ 'ಅತೃಪ್ತಿ ಇಲ್ಲದೆ ಇರುವುದು'. ಜೀವನದಲ್ಲಿ ನಮ್ಮೆಲ್ಲಾ ದುಃಖಗಳಿಗೆ ಕಾರಣ ಅತೃಪ್ತಿ. ಇಲ್ಲದೇ ಇರುವುದರ ಬಗೆಗೆ ಅತೃಪ್ತಿ ಪಡುವುದರ ಬದಲು ಇರುವುದರ ಬಗ್ಗೆ ತೃಪ್ತಿ ಪಡು. ಏನಿದೆಯೋ ಅದರಲ್ಲಿ ತೃಪ್ತಿ ಪಡುವುದನ್ನು ಅಭ್ಯಾಸ ಮಾಡು. ಸದಾ ಯೋಗಿಯಾಗು. ಇಲ್ಲಿ ಯೋಗಿ ಅನ್ನುವುದಕ್ಕೆ ಅನೇಕ ಅರ್ಥಗಳಿವೆ. ವಿವಿಧ ಆಸನಗಳ ಅಭ್ಯಾಸ ಯೋಗವಲ್ಲ. ಮನಸ್ಸನ್ನು ಏಕಾಗ್ರಗೊಳಿಸಲು ಮಾಡಬೇಕಾದ ಪ್ರಕ್ರಿಯೆ ಯೋಗ. ಕೋತಿಯಂತೆ ಹರಿದಾಡುವ ನಮ್ಮ ಮನಸ್ಸನ್ನು ಹಿಡಿದು ನಿಲ್ಲಿಸುವುದು-ಗಾಳಿಯನ್ನು ಹಿಡಿದು ನಿಲ್ಲಿಸಿದಂತೆ. ಅದು ತುಂಬಾ ವಿಚಿತ್ರ. ಮನಸ್ಸು ಜಾರಿ ಹೋಗುವುದು ನಮಗೆ ತಿಳಿಯುವುದು ಅದು ಹೋದ ಮೇಲೆ. ಇಂತಹ ಮನಸ್ಸನ್ನು ಹಿಡಿದು ನಿಲ್ಲಿಸಲು ಮೊದಲು ಬೆನ್ನುಹುರಿಯನ್ನು ನೆಟ್ಟಗೆ ಮಾಡಿ ಸ್ಥಿರವಾಗಿ ಕುಳಿತುಕೊಳ್ಳಲು ಅಭ್ಯಾಸ ಮಾಡುವುದು-ಆಸನ(ಯಾವ ಆಸನವಾದರೂ ಸರಿ). ನಂತರ ಪ್ರಾಣಾಯಾಮದ ಮೂಲಕ ಒಳಗಿನ ಚಿಂತನೆಯನ್ನು ಜಾಗೃತಗೊಳಿಸುವುದು ಯೋಗ. ಸ್ವಚ್ಛ ಮನಸ್ಸಿನಲ್ಲಿ ಭಗವಂತನನ್ನು ಕೂರಿಸುವುದು ಯೋಗ, ಬದುಕಿನಲ್ಲಿ ಜೀವನ ನಿರ್ವಹಣೆಗೆ ಕಂಡುಕೊಂಡ(ಸಿಕ್ಕಿದ) ದಾರಿಯನ್ನು ಶ್ರದ್ಧೆಯಿಂದ ಪ್ರಾಮಾಣಿಕವಾಗಿ ಮಾಡುವುದು ಯೋಗ. ಈ ರೀತಿ ಅಭ್ಯಾಸದಿಂದ ಮನಸ್ಸನ್ನು ನಮ್ಮ ಹಿಡಿತದಲ್ಲಿಟ್ಟುಕೊಳ್ಳಬೇಕು. ಏನನ್ನೂ ಕೆಟ್ಟ ಭಾವದಿಂದ ಕಾಣದೇ ಇರವುದನ್ನು ಅಭ್ಯಸಿಸು. ಅಧ್ಯಾತ್ಮ ದಾರಿಯಲ್ಲಿ ಅಚಲವಾದ ನಿರ್ಧಾರವಿರಲಿ. ಏನೇ ಬರಲಿ ದೃಢನಿಶ್ಚಯದಿಂದ ಮುಂದೆ ಸಾಗು. ಮನಸ್ಸು ಭಗವಂತನಿಗಾಗಿ ಹಾತೊರೆಯಲಿ. ಬುದ್ಧಿ ಭಗವಂತನನ್ನು ಅರಿಯಲಿ. "ಈ ರೀತಿ ಯಾರು ನನ್ನನ್ನು ಪ್ರೀತಿಸುತ್ತಾರೋ(ಭಕ್ತ) ಅವರು ನನಗೆ ಅತೀ ಪ್ರಿಯ" ಎನ್ನುತ್ತಾನೆ ಕೃಷ್ಣ.

ಯಸ್ಮಾನ್ನೋದ್ವಿಜತೇ ಲೋಕೋ ಲೋಕಾನ್ನೋದ್ವಿಜತೇ ಚ ಯಃ ।
ಹರ್ಷಾಮರ್ಷಭಯೋದ್ವೇಗೈರ್ಮುಕ್ತೋ ಯಃ ಸ ಚ ಮೇ ಪ್ರಿಯಃ ॥೧೫॥

ಯಸ್ಮಾತ್ ನ ಉದ್ವಿಜತೇ ಲೋಕಃ ಲೋಕಾತ್ ನ ಉದ್ವಿಜತೇ ಚ ಯಃ ।
ಹರ್ಷ ಅಮರ್ಷ ಭಯ ಉದ್ವೇಗೈಃ ಮುಕ್ತಃ ಯಃ ಸಃ ಚ ಮೇ ಪ್ರಿಯಃ –ಯಾರಿಂದಲೂ ನೋಯದವನು, ಯಾರನ್ನೂ ನೋಯಿಸದವನು, ಹಮ್ಮಿನಿಂದ ಕೇಡಿಗೆಳೆಸದವನು, ರೇಗದವನು, ಅಂಜದವನು, ತಲ್ಲಣಗೊಳ್ಳದವನು-ಅವನು ನನಗೆ ಅಚ್ಚುಮೆಚ್ಚು.

ನಮ್ಮನ್ನು ನೋಡಿ ಇನ್ನೊಬ್ಬರು ಉದ್ವೇಗಗೊಳ್ಳಬಾರದು ಹಾಗೂ ನಾವು ಇನ್ನೊಬ್ಬರನ್ನು ಉದ್ವೇಗಗೊಳಿಸಬಾರದು. ಯಾರೂ ನಮ್ಮನ್ನು ನೋಡಿ ಅಸಹನೆ-ಅತೃಪ್ತಿ ತಾಳಬಾರದು ಮತ್ತು ಇನ್ನೊಬ್ಬರನ್ನು ನೋಡಿ ನಾವು ಅಸಹನೆ ತಾಳಬಾರದು. ನಾವು ಪ್ರಪಂಚವನ್ನು ಬೇಷರತ್ತಾಗಿ ಪ್ರೀತಿಸಿದಾಗ ಇದನ್ನು ಸಾಧಿಸಲು ಸಾಧ್ಯ. ಭಗವಂತ ಮೆಚ್ಚುವ ಕೆಲಸ ಮಾಡಿದಾಗ ಭಗವಂತ ನಮ್ಮನ್ನು ಪ್ರೀತಿಸುತ್ತಾನೆ. ಭಗವಂತ ಪ್ರೀತಿಸುವವರನ್ನು ಇಡೀ ಪ್ರಪಂಚವೇ ಪ್ರೀತಿಸುತ್ತದೆ.

ನಾವು ಹರ್ಷ ಅಮರ್ಷ ಭಯ ಮತ್ತು ಉದ್ವೇಗದಿಂದ ಮುಕ್ತರಾಗಬೇಕು. ಮಾಡಬಾರದ್ದನ್ನು ಮಾಡುವುದರಲ್ಲಿ ಹಿಗ್ಗು ಹರ್ಷ; ಇನ್ನೊಬ್ಬರು ಮಾಡಬೇಕಾದ್ದನ್ನು ಮಾಡಿದಾಗ ಅದನ್ನು ನೋಡಿ ಹೊಟ್ಟೆಕಿಚ್ಚು ಪಡುವುದು ಅಮರ್ಷ. ಸಾಧಕ ಹರ್ಷ ಅಮರ್ಷದಿಂದ ಮುಕ್ತನಾಗಿರಬೇಕು. ಹೆದರುವಂತಹ ಕೆಲಸ ಮಾಡಬೇಡ ಮತ್ತು ತಪ್ಪು ಮಾಡದಿದ್ದಾಗ ಭಯಬೇಡ. ಇನ್ನೊಬ್ಬರನ್ನು ನಾವು ಸಂಶಯ ದೃಷ್ಟಿಯಿಂದ ನೋಡಿದರೆ ಅವರೂ ನಮ್ಮನ್ನು ಸಂಶಯ ದೃಷ್ಟಿಯಿಂದ ನೋಡುತ್ತಾರೆ. ನಾವು ಇನ್ನೊಬ್ಬರನ್ನು ನಂಬದಿದ್ದಾಗ ಅವರೂ ನಮ್ಮನ್ನು ನಂಬುವುದಿಲ್ಲ. ಇದರಿಂದ ಉದ್ವೇಗ(**Tension**). ಉದ್ವೇಗದಿಂದ ಅನೇಕ ವಿಧದ ರೋಗಗಳು ನಮ್ಮ ದೇಹದಲ್ಲಿ ಮನೆ ಮಾಡುತ್ತವೆ. ನಾವು ಭಗವಂತನನ್ನು ನಂಬಿ ನಿಸ್ವಾರ್ಥವಾಗಿ, ನಿಶ್ಚಿಂತೆಯಿಂದ ಬದುಕಲು ಕಲಿಯಬೇಕು. "ಜೀವನದಲ್ಲಿ ಎಲ್ಲರನ್ನು ಪ್ರೀತಿಸುವ ಸಾಧಕ; ಹರ್ಷ ಅಮರ್ಷ ಭಯ ಮತ್ತು ಉದ್ವೇಗವನ್ನು ಗೆದ್ದ ಸಾಧಕ ನನಗೆ ಪ್ರಿಯ" ಎನ್ನುತ್ತಾನೆ ಕೃಷ್ಣ.

ಅನಪೇಕ್ಷಃ ಶುಚಿರ್ದಕ್ಷ ಉದಾಸೀನೋ ಗತವ್ಯಥಃ ।
ಸರ್ವಾರಂಭಪರಿತ್ಯಾಗೀ ಯೋ ಮದ್ಭಕ್ತಃ ಸ ಮೇ ಪ್ರಿಯಃ ॥೧೬॥

ಅನಪೇಕ್ಷಃ ಶುಚಿಃ ದಕ್ಷಃ ಉದಾಸೀನಃ ಗತವ್ಯಥಃ ।
ಸರ್ವಾರಂಭಪರಿತ್ಯಾಗೀ ಯಃ ಮತ್ ಭಕ್ತಃ ಸಃ ಮೇ ಪ್ರಿಯಃ –ಏನನ್ನೂ ಬಯಸದವನು, ಚೊಕ್ಕವಾಗಿ ಚುರುಕಾಗಿರುವವನು, ಯಾವುದನ್ನೂ ಹಚ್ಚಿಕೊಳ್ಳದವನು, ಕಂಗೆಡದವನು, ಭಗವಂತನ ಆರಾಧನೆಯಲ್ಲದ ಯಾವ ತೊಡಗುವಿಕೆಯಲ್ಲೂ ತೊಡಗದವನು,[ಎಲ್ಲವನ್ನೂ ಭಗವಂತನಿಗೆ ಅರ್ಪಿಸಿ ನಾನು-ನನ್ನದು ಎಂಬ ಹಮ್ಮು ತೊರೆದವನು], ಇಂತಹ ನನ್ನ ಭಕ್ತ ನನಗೆ ಅಚ್ಚುಮೆಚ್ಚು.

ತನ್ನ ಭಕ್ತನಲ್ಲಿರಬೇಕಾದ, ಭಕ್ತಿಗೆ ಪೂರಕವಾದ ಆರು ಗುಣಗಳನ್ನು ಕೃಷ್ಣ ಈ ಶ್ಲೋಕದಲ್ಲಿ ವಿವರಿಸಿದ್ದಾನೆ.
**(೧) ಅನಪೇಕ್ಷಃ** : ಅದು ಬೇಕು ಇದು ಬೇಕು ಎಂದು ಬಯಸದೇ ಇರುವುದು. ಯಾವುದರಿಂದ ತಾತ್ಕಾಲಿಕ ಸುಖ ಬರುತ್ತದೋ ಅದರ ಹಿಂದೆ ಹೋಗದೆ, ಶಾಶ್ವತವಾದ ಮೋಕ್ಷ ಮಾರ್ಗದಲ್ಲಿ ನಡೆಯುವುದು. ಏನು ಸಿಕ್ಕಿತೋ ಅದರಲ್ಲಿ ಸಂತೋಷಪಡುವುದು-ಇದು ಅನಪೇಕ್ಷಃ.
**(೨) ಶುಚಿಃ** : ನಿರ್ಮಲ ಮತ್ತು ನಿರಾಳವಾಗಿರುವುದು. ಇದೇ ಮಡಿ. ಬಾಯಲ್ಲಿ ಕೆಟ್ಟ ಮಾತು, ಮನಸ್ಸಿನಲ್ಲಿ ಕೆಟ್ಟ ಯೋಚನೆ, ಮೈಯಲ್ಲಿ ಕೊಳೆ-ಇದು ಮೈಲಿಗೆ. ಮೊದಲು ನಾವು ನಮ್ಮ ಮನಸ್ಸಿನ ಕೊಳೆ ತೊಳೆದುಕೊಳ್ಳಬೇಕು. ಇದಕ್ಕೆ ಪೂರಕವಾಗಿ ಬಾಹ್ಯ ಶುದ್ಧಿ. ಇದಕ್ಕಾಗಿ ಶಾಂತಿ ಪಾಠದಲ್ಲಿ ಹೀಗೆ ಹೇಳುತ್ತೇವೆ: "ಓಂ ಭದ್ರಂ ಕರ್ಣೇಭಿಃ ಶೃಣುಯಾಮ ದೇವಾಃ ಭದ್ರಂ ಪಶ್ಯೇಮಾಕ್ಷಭಿರ್ಯಜತ್ರಾಃ" ಎಂದು. ನಾವು ಒಳ್ಳೆಯದನ್ನು ನೋಡೋಣ, ಒಳ್ಳೆಯದನ್ನು ಮಾತನಾಡೋಣ, ಒಳ್ಳೆಯದನ್ನು ಯೋಚಿಸೋಣ ಎಂದು. ಇದು ನಿಜವಾದ ಮಡಿ.
ಮಡಿಯ ಬಗ್ಗೆ ಹೆಚ್ಚು ಪ್ರಸಿದ್ಧವಾದ ಎರಡು ಶ್ಲೋಕಗಳಿವೆ:

ಅಪವಿತ್ರಃ ಪವಿತ್ರೋವ ಸರ್ವಾವಸ್ಥಾಂ ಗತೋಪಿವಾ |
ಯಃ ಸ್ಮರೇತ್ ಪುಂಡರೀಕಾಕ್ಷಂ ಸ ಬಾಹ್ಯಾಭ್ಯಂತರಃ ಶುಚಿಃ ||

ಮತ್ತು

ಅತಿನೀಲಘನಶ್ಯಾಮಂ ನಲಿನಾಯತಲೋಚನಂ |
ಸ್ಮರಾಮಿ ಪುಂಡರೀಕಾಕ್ಷಂ ತೇನ ಸ್ನಾತೋ ಭಾವಾಮ್ಯಹಂ||

ಇಲ್ಲಿ ಪುಂಡರೀಕಾಕ್ಷನನ್ನು ಸ್ಮರಣೆ ಮಾಡಬೇಕು ಎಂದು ಹೇಳಿದ್ದಾರೆ. ಇದೊಂದು ಭಗವಂತನ ವಿಶೇಷ ನಾಮ. ಪುಂಡರೀಕಾಕ್ಷ ಎಂದರೆ ಕೆಂದಾವರೆಯಂತಹ ಕಣ್ಣುಳ್ಳವನು ಎಂದರ್ಥ. ಭಗವಂತನ ಕಣ್ಣು ಯಾವಾಗಲೂ ಕೆಂದಾವರೆ ಎಸಳಿನಂತೆ ಅರಳಿ ನಳನಳಿಸುತ್ತಿರುತ್ತದೆ. ಸಾಮಾನ್ಯವಾಗಿ ನಮಗೆ ಅತ್ಯಂತ ಸಂತೋಷವಾದಾಗ ನಮ್ಮ ಕಣ್ಣು ಅರಳುತ್ತವೆ. ಆದರೆ ಭಗವಂತ ಸದಾ ಸಂತೋಷದ ಬುಗ್ಗೆ. ಭಗವಂತ ಪ್ರೀತಿಯಿಂದ ಕಣ್ಣರಳಿಸಿ ನನ್ನನ್ನು ನೋಡುತ್ತಿದ್ದಾನೆ. ಅವನ ಕಣ್ಣಿನಿಂದ ಹರಿದುಬರುತ್ತಿರುವ ಅನುಗ್ರಹದ ರಸಧಾರೆಯಲ್ಲಿ ನಾನು ಮೀಯುತ್ತಿದ್ದೇನೆ. ಅವನ ಅನುಗ್ರಹದ ಕೃಪಾದೃಷ್ಟಿ ನನ್ನ ಮೇಲೆ ಹರಿದಿದೆ. ನಾನು ಅದರಲ್ಲಿ ಮಿಂದೆ ಎನ್ನುವ ಅನುಸಂಧಾನ ಶುಚಿ. ಹೀಗೆ ನಾವು ಭಗವಂತನ ಅನುಗ್ರಹದಿಂದ ಒಳಗೂ ಹೊರಗೂ ಮಡಿಯಾಗಬೇಕು.

(೩) ದಕ್ಷಃ : ನಮ್ಮಲ್ಲಿ ಮನಸ್ಸನ್ನು ಭಗವಂತನೆಡೆಗೆ ಹರಿಸುವ ದಕ್ಷತೆ ಇರಬೇಕು. ಆತ ನಮ್ಮ ಬಾಹ್ಯ ಪ್ರಯತ್ನಕ್ಕೆ ಒಲಿಯಲಾರ. ನಾವು ಅಂತರಂಗದಿಂದ ಆತನೆಡೆಗೆ ಹೋಗಬೇಕು. ಬಾಹ್ಯ ಕ್ರಿಯೆ ನಮ್ಮ ಅಂತರಂಗದ ಸಾಧನೆಗೆ ಪೂರಕ ಅಷ್ಟೆ. ಭಗವಂತನನ್ನು ಹೇಗೆ ಸೇರಬಹುದು ಎನ್ನುವ ತಿಳುವಳಿಕೆ, ಜಾಣತನ ನಮ್ಮಲ್ಲಿರಬೇಕು.

(೪) ಉದಾಸೀನ : ಅಂತರ್ಯಾಮಿಯಾಗಿರುವುದು. ಯಾವುದೇ ಬಾಹ್ಯ ಕ್ರಿಯೆಗೆ ಒತ್ತು ಬೇಡ, ಆಗ್ರಹ ಬೇಡ. ಉದಾಹರಣೆಗೆ- ನಿಮ್ಮ ಕುಟುಂಬದಲ್ಲಿ ಯಾರೋ ಒಬ್ಬರು ತಮ್ಮ ಯಾವುದೋ ಒಂದು ಫಲಾಪೇಕ್ಷೆಯನ್ನು ಈಡೇರಿಸಿಕೊಳ್ಳಲು ಯಾವುದೋ ಒಂದು ಪೂಜೆ ಮಾಡಿಸುತ್ತಿದ್ದಾರೆ. ಅಂಥಹ ಸಂದರ್ಭದಲ್ಲಿ ಫಲಾಪೇಕ್ಷೆಯಿಂದ ಭಗವದಾರಾಧನೆ ತಪ್ಪು ಎಂದು ಅದನ್ನು ವಿರೋಧಿಸಿ ನಿಲ್ಲುವುದು ಒಳ್ಳೆಯದಲ್ಲ. ಏನೇ ಇರಲಿ ಅದು ಭಗವಂತನ ಸೇವೆ; ಅದು ಭಗವಂತನನ್ನು ಸೇರಲಿ ಎಂದು ಪ್ರಾರ್ಥಿಸಿ. ಎಲ್ಲರೊಂದಿಗಿದ್ದು ಯಾವುದೇ ಆಗ್ರಹವಿಲ್ಲದೆ ಬದುಕಲು ಕಲಿಯಿರಿ.

(೫) ಗತವ್ಯಥಃ : ಏನೇ ಆದರೂ ಬೇಸರಿಸಿಕೊಳ್ಳದೆ ಸದಾ ಆನಂದವಾಗಿರುವುದು.

(೬) ಸರ್ವಾರಂಭಪರಿತ್ಯಾಗಿ : ಭಗವಂತನ ಪಾರಮ್ಯಕ್ಕೆ ವಿರುದ್ಧವಾದ ಯಾವ ಆರಂಭಕ್ಕೂ ತೊಡಗದಿರುವುದು. ಎಲ್ಲಾ ಆರಂಭವನ್ನು ಫಲಕಾಮನೆಯಿಂದ ಮಾಡುವುದನ್ನು ಬಿಡು. ಎಲ್ಲವನ್ನೂ ಕೊನೆಗೆ ಕೃಷ್ಣಾರ್ಪಣಮಸ್ತು ಎಂದು ಭಗವಂತನಲ್ಲಿ ಅರ್ಪಿಸು.

"ಯಾರು ಈ ಗುಣಗಳೊಂದಿಗೆ ನನ್ನನ್ನು ಪ್ರೀತಿಸುತ್ತಾರೋ ಅಂತಹ ಭಕ್ತ ನನಗೆ ಅಚ್ಚುಮೆಚ್ಚು" ಎನ್ನುತ್ತಾನೆ ಕೃಷ್ಣ.

ಯೋ ನ ಹೃಷ್ಯತಿ ನ ದ್ವೇಷ್ಟಿ ನ ಶೋಚತಿ ನ ಕಾಂಕ್ಷತಿ ।
ಶುಭಾಶುಭಪರಿತ್ಯಾಗೀ ಭಕ್ತಿಮಾನ್ ಯಃ ಸ ಮೇ ಪ್ರಿಯಃ ॥೧೭॥

ಯಃ ನ ಹೃಷ್ಯತಿ ನ ದ್ವೇಷ್ಟಿ ನ ಶೋಚತಿ ನ ಕಾಂಕ್ಷತಿ ।
ಶುಭ ಅಶುಭ ಪರಿತ್ಯಾಗೀ ಭಕ್ತಿಮಾನ್ ಯಃ ಸಃ ಮೇ ಪ್ರಿಯಃ –ಬೀಗುವುದಿಲ್ಲ; ಹೇಸುವುದಿಲ್ಲ; ಕೊರಗುವುದಿಲ್ಲ; ಬಯಸುವುದಿಲ್ಲ. ಒಳಿತು ಕೆಡುಕುಗಳ ಕುರಿತು ಕಾಳಜಿಯಿಲ್ಲ, ಇಂತಹ ಭಕ್ತನು ನನಗೆ ಅಚ್ಚುಮೆಚ್ಚು.

ಇಲ್ಲಿ ಹಿಂದೆ ಹೇಳಿದ ಕೆಲವು ವಿಚಾರ ಪುನರುಕ್ತಿಯಾಗಿದೆ. ಸಾಮಾನ್ಯವಾಗಿ ಒಂದು ವಿಷಯವನ್ನು ಹೆಚ್ಚು ಸ್ಪಷ್ಟಪಡಿಸುವುದಕ್ಕಾಗಿ ಮತ್ತು ಒಂದು ವಿಚಾರಕ್ಕೆ ಹೆಚ್ಚು ಒತ್ತು ಕೊಡುವುದಕ್ಕಾಗಿ ಪುನರುಕ್ತಿ. ಇಲ್ಲಿ ಕೃಷ್ಣ ಹೇಳುತ್ತಾನೆ: ಯಾವುದೋ ಒಂದು ಒಳ್ಳೆಯ ಕೆಲಸ ಮಾಡಿದಾಗ ಬೀಗಬೇಡ ಮತ್ತು ಇನ್ನೊಬ್ಬರನ್ನು ಕಂಡು ಹೇಸಿಗೆ ಪಡಬೇಡ. ಸಿಕ್ಕಿತೆಂದು ಅತೀವ ಖುಶಿ, ಸಿಗಲಿಲ್ಲವೆಂದು ದುಃಖ ಅಥವಾ ದ್ವೇಷ ಬೇಡ. ಜೀವನದಲ್ಲಿ ಜ್ಞಾನ ಭಕ್ತಿ ವೈರಾಗ್ಯ ಇದು ಶುಭ. ಉಳಿದ ಎಲ್ಲಾ ವಿಷಯಗಳ ಒಳಿತು ಕೆಡುಕುಗಳ ವಿಶ್ಲೇಷಣೆ ಬೇಡ. ಈ ಪ್ರಪಂಚದಲ್ಲಿ ಯಾವುದೂ ಆಕಸ್ಮಿಕವಲ್ಲ. ಇಲ್ಲಿ ನಡೆಯುವ ಪ್ರತಿಯೊಂದು ಘಟನೆ ಹಿಂದೆ ನಮಗೆ ತಿಳಿಯದೇ ಇರುವ ಒಂದು ಕಾರಣವಿರುತ್ತದೆ. ಅದಕ್ಕಾಗಿ ಅದನ್ನು ಶುಭ-ಅಶುಭ ಎಂದು ನಿರ್ಧರಿಸಲು ನಾವು ಸಮರ್ಥರಲ್ಲ. ಈ ರೀತಿ ತಿಳಿದು ಬದುಕುವ ಭಕ್ತ ನನಗೆ ಪ್ರಿಯ ಎನ್ನುತ್ತಾನೆ ಕೃಷ್ಣ.

ಸಮಃ ಶತ್ರೌ ಚ ಮಿತ್ರೇ ಚ ತಥಾ ಮಾನಾಪಮಾನಯೋಃ ।
ಶೀತೋಷ್ಣಸುಖದುಃಖೇಷು ಸಮಃ ಸಂಗವಿವರ್ಜಿತಃ ॥೧೮॥

ತುಲ್ಯನಿಂದಾಸ್ತುತಿರ್ಮೌನೀ ಸಂತುಷ್ಟೋ ಯೇನ ಕೇನಚಿತ್ ।
ಅನಿಕೇತಃ ಸ್ಥಿರಮತಿರ್ಭಕ್ತಿಮಾನ್ ಮೇ ಪ್ರಿಯೋ ನರಃ ॥೧೯॥

ಸಮಃ ಶತ್ರೌ ಚ ಮಿತ್ರೇ ಚ ತಥಾ ಮಾನ ಅಪಮಾನಯೋಃ ।
ಶೀತ ಉಷ್ಣ ಸುಖ ದುಃಖೇಷು ಸಮಃ ಸಂಗವಿವರ್ಜಿತಃ ॥
ತುಲ್ಯ ನಿಂದಾ ಸ್ತುತಿಃ ಮೌನೀ ಸಂತುಷ್ಟಃ ಯೇನ ಕೇನಚಿತ್ ।
ಅನಿಕೇತಃ ಸ್ಥಿರ ಮತಿಃ ಭಕ್ತಿಮಾನ್ ಮೇ ಪ್ರಿಯಃ ನರಃ – ಹಗೆಯ-ಗೆಳೆಯರಲ್ಲಿ ಭೇದ ಬಗೆಯದವನು; ಗೌರವ-ಅಗೌರವಗಳನ್ನು, ಶೀತ-ಉಷ್ಣಗಳನ್ನು, ಸುಖ-ದುಃಖಗಳನ್ನು ಸಮನಾಗಿ ಕಾಣುವವನು; ಯಾವುದಕ್ಕೂ ಅಂಟಿಕೊಳ್ಳದವನು; ಹೊಗಳಿಕೆಯನ್ನು ತೆಗಳಕೆಯಂತೆ ಕಾಣುವವನು; ಚಿಂತನಶೀಲನು; ಏನು ಇದೆಯೋ ಅಷ್ಟರಲ್ಲಿ ತೃಪ್ತನಾದವನು; ಒಂದೆಡೆ ನೆಲೆನಿಲ್ಲದವನು [ಭಗವಂತನಲ್ಲಿ ನೆಲೆ ನಿಂತವನು;] ಭಗವಂತನ ಅರಿವು ಗಟ್ಟಿಗೊಂಡವನು-ಭಕ್ತನಾದ ಇಂತಹ ಮನುಜ ನನಗೆ ಅಚ್ಚುಮೆಚ್ಚು.

ಸಾಮಾನ್ಯವಾಗಿ ನಾವು ಶತ್ರು ಅಥವಾ ಮಿತ್ರ ಅನ್ನುವ ಭಾವನೆಯನ್ನು ವ್ಯಾವಹಾರಿಕವಾಗಿ ರೂಢಿಸಿಕೊಳ್ಳುತ್ತೇವೆ. ನಮ್ಮನ್ನು ಹೊಗಳುವವರು ನಮಗೆ ಮಿತ್ರರು, ನಮ್ಮ ತಪ್ಪನ್ನು ತೆಗಳುವವರು ಶತ್ರುಗಳು. ಇದು ನಮ್ಮ ಅಪ್ರಭುದ್ಧ ನಡೆ. ಸ್ನೇಹದ ಹಿಂದೆ ದ್ವೇಷವಿರಬಹುದು, ದ್ವೇಷದ ಹಿಂದೆ ಸ್ನೇಹವಿರಬಹುದು. ಪುರಂದರದಾಸರು 'ನಿಂದಕರಿರಬೇಕು' ಎಂದು ಹಾಡಿರುವುದನ್ನು ನಾವು ಇಲ್ಲಿ ನೆನಪಿಸಿಕೊಳ್ಳಬಹುದು. ನಿಂದಕರು ನಮ್ಮ ನಿಂದೆ ಮಾಡುವ ಮೂಲಕ ನಮ್ಮಲ್ಲಿರುವ ನಿಂದ್ಯವಾದ ದೋಷಗಳ ಫಲವನ್ನು ತೆಗೆದುಕೊಳ್ಳುತ್ತಾರೆ. ಹೊಗಳುವವರು ಹೊಗಳುವ ಮೂಲಕ ನಮ್ಮಲ್ಲಿರುವ ಒಳ್ಳೆಯತನದ ಪುಣ್ಯದ ಫಲದ

ಪಾಲನ್ನು ಪಡೆಯುತ್ತಾರೆ. ಆದ್ದರಿಂದ ಸಾಧನೆಯ ಮಾರ್ಗದಲ್ಲಿ ಹೊಗಳುವವರಿಗಿಂತ ನಿಂದಕರು ಸಹಾಯಕರು. ಈ ಕಾರಣದಿಂದ ಶತ್ರು ಮಿತ್ರ ಎನ್ನುವ ಪರಿಭೇದ ಮಾಡಿಕೊಂಡು ಯಾರನ್ನೋ ಟೀಕೆ ಮಾಡುವುದಾಗಲಿ, ದ್ವೇಷ ಕಟ್ಟಿಕೊಳ್ಳುವುದಾಗಲಿ ಮಾಡಿಕೊಳ್ಳಬೇಡ. ದುರ್ಗುಣದಿಂದ ದೂರವಿರು. ಒಳ್ಳೆಯ ಗುಣವನ್ನು ಪ್ರೀತಿಸು. ಎಲ್ಲಿ ಒಳ್ಳೆಯತನವಿದೆಯೋ ಅವರ ಒಡನಾಟಮಾಡು(ಮೈತ್ರಿ); ದುಃಖವನ್ನು ಕಂಡು ಕರಗು(ಕರುಣ); ಇನ್ನೊಬ್ಬರ ಸಂತೋಷವನ್ನು ಕಂಡು ಸಂತೋಷಪಡು(ಮುದಿತ); ಕೆಟ್ಟತನದಿಂದ ದೂರವಿರು(ಉಪೇಕ್ಷ). ಮೂಲಭೂತವಾಗಿ ಶತ್ರು ಮಿತ್ರ ಎನ್ನುವ ವಿಭಾಗ ಬೇಡ. ಎಲ್ಲರಲ್ಲಿಯೂ ಭಗವಂತನನ್ನು ಕಾಣು. ಲೌಕಿಕ ಶತ್ರು-ಮಿತ್ರ ಭಾವನೆಯನ್ನು ಬಿಟ್ಟುಬಿಡು.

ಸನ್ಮಾನ ಮಾಡಿದಾಗ ಉಬ್ಬಬೇಡ. ಅವಮಾನ ಮಾಡಿದಾಗ ಕುಗ್ಗಬೇಡ. ಮಾನ-ಅವಮಾನವನ್ನು ಗೆಲ್ಲು. ಇನ್ನೊಬ್ಬರು ಏನು ಹೇಳಿದರು ಎನ್ನುವುದು ಮುಖ್ಯವಲ್ಲ. ನಮ್ಮ ಅಂತರಾತ್ಮ ಏನು ಎನ್ನುವುದು ಮುಖ್ಯ. ಇನ್ನೊಬ್ಬರು ಹೊಗಳಿದಾಗ ನಮ್ಮಲ್ಲಿ ಇಲ್ಲದ ಗುಣ ನಮ್ಮನ್ನು ಬಂದು ಸೇರುವುದಿಲ್ಲ. ಅದೇ ರೀತಿ ಇನ್ನೊಬ್ಬರು ತೆಗಳಿದಾಗ ನಾವು ಕೆಳಗೆ ಹೋಗುವುದಿಲ್ಲ. ಹೊಗಳಿಕೆ ಬಗ್ಗೆ ನಾವು ಎಚ್ಚರದಿಂದಿರಬೇಕು. ಏಕೆಂದರೆ ಅದರಿಂದ ನಾವು ದಾರಿ ತಪ್ಪುವ ಸಾಧ್ಯತೆ ಹೆಚ್ಚು. ಅವಮಾನದಿಂದ ನಾವು ತಪ್ಪು ದಾರಿಯನ್ನು ಬಿಟ್ಟು ಸರಿ ದಾರಿಯಲ್ಲಿ ಸಾಗಿ ಎತ್ತರಕ್ಕೇರುವ ಸಾಧ್ಯತೆ ಇದೆ.

ಸುಖ-ದುಃಖವನ್ನು ಸಮನಾಗಿ ಕಾಣು. ಯಾವುದೇ ವಸ್ತು ನಮಗೆ ಸುಖ-ದುಃಖವನ್ನು ಕೊಡುವುದಿಲ್ಲ. ಆ ವಸ್ತುವನ್ನು ನಾವು ನೋಡುವ ಭಾವನೆ ನಮಗೆ ಸುಖ-ದುಃಖವನ್ನು ಕೊಡುತ್ತದೆ. ಆದ್ದರಿಂದ ಶೀತ-ಉಷ್ಣದಂತೆ ಸುಖ-ದುಃಖವನ್ನು ಸಮನಾಗಿ ಕಾಣುವುದನ್ನು ರೂಢಿಸಿಕೋ.

ನಮಗನಿಸುತ್ತದೆ ಇವೆಲ್ಲವೂ ಮಾನವ ಸಹಜಪ್ರವೃತ್ತಿ(**Instinct**) ಎಂದು. ಆದರೆ ಇದು ಸಹಜ ಧರ್ಮವಲ್ಲ. ನಾವು ಅಂಟಿಸಿಕೊಳ್ಳುವುದರಿಂದ ನಮ್ಮಲ್ಲಿ ನಮಗೆ ಬೇಡವಾದ ಈ ಗುಣಗಳು ತುಂಬಿಕೊಳ್ಳುತ್ತವೆ. ಆದ್ದರಿಂದ ಹೊಗಳಿಕೆ ಮತ್ತು ತೆಗಳಿಕೆಗೆ ತಕ್ಷಣ ಪ್ರತಿಕ್ರಿಯಿಸಬೇಡ. ಮೌನಿಯಾಗು. ವಿಷಯದ ಬಗ್ಗೆ ಮನನ ಮಾಡು. ದುಡುಕಬೇಡ. ಎಷ್ಟು ಕಡಿಮೆ ಮಾತನಾಡಲು ಸಾಧ್ಯವೋ ಅಷ್ಟು ಕಡಿಮೆ ಮಾತನಾಡು. ಯೋಚಿಸಿ ಮಾತನಾಡು. ಏನಿದೆಯೋ ಅದನ್ನು ತೃಪ್ತಿಯಿಂದ ಅನುಭವಿಸು. ಸ್ಥಿರ-ಚರ ವಸ್ತುಗಳ(**Making own property**) ಹಿಂದೆ ಹೋಗಬೇಡ. ಭಗವಂತ ಕೊಟ್ಟಿರುವುದರಲ್ಲಿ ಸಂತೋಷದಿಂದ ನಿಶ್ಚಿಂತೆಯಿಂದ ಬದುಕು. ಭಕ್ತಿಯಿಂದ ಭಗವಂತನಲ್ಲಿ ಶರಣಾದಾಗ ನಾವು ನಮ್ಮ ಸಾಧನೆಯ ಹಾದಿಯಲ್ಲಿ ಈ ಎತ್ತರಕ್ಕೇರಬಹುದು. 'ಇಂತಹ ಗುಣವನ್ನು ಹೊಂದಿರುವ ಭಕ್ತ ನನಗೆ ಅಚ್ಚುಮೆಚ್ಚು' ಎನ್ನುತ್ತಾನೆ ಕೃಷ್ಣ.

ಯೇ ತು ಧರ್ಮ್ಯಾಮೃತಮಿದಂ ಯಥೋಕ್ತಂ ಪರ್ಯುಪಾಸತೇ ।
ಶ್ರದ್ದಧಾನಾ ಮತ್ ಪರಮಾ ಭಕ್ತಾಸ್ತೇಽತೀವ ಮೇ ಪ್ರಿಯಾಃ ॥೨೦॥

ಯೇ ತು ಧರ್ಮ ಅಮೃತಮ್ ಇದಮ್ ಯಥಾ ಉಕ್ತಮ್ ಪರ್ಯುಪಾಸತೇ ।

**ಶ್ರದ್ದಧಾನಾಃ ಮತ್ ಪರಮಾಃ ಭಕ್ತಾಃ ತೇ ಅತೀವ ಮೇ ಪ್ರಿಯಾಃ –ಧರ್ಮ ಮೋಕ್ಷಗಳಿಗೆ ಸಾಧನವಾದ ಈ ಭಕ್ತಿ ಯೋಗವನ್ನು ಇಲ್ಲಿ ಹೇಳಿದ ರೀತಿ ಆಚರಿಸುವವರು, ನನ್ನ ಹಿರಿಮೆಯನ್ನು ನಂಬಿ ನಡೆದು ನನ್ನಲ್ಲಿ ಭಕ್ತಿಯಿಟ್ಟವರು – ಅಂತವರು ನನಗೆ ತುಂಬಾ ಅಚ್ಚುಮೆಚ್ಚು.**

**ನಮ್ಮ ಭಕ್ತಿ ಹೇಗಿರಬೇಕು, ಭಕ್ತನಲ್ಲಿರಬೇಕಾದ ಗುಣಗಳೇನು ಎನ್ನುವ ಈ ಅಮೃತ(ಮೋಕ್ಷ)ಸಾಧನಾ ಧರ್ಮವನ್ನು ವಿವರಿಸಿದ ಕೃಷ್ಣ, ಇಲ್ಲಿ ಫಲಶ್ರುತಿಯಾಗಿ ಹೇಳುತ್ತಾನೆ: "ಇಲ್ಲಿ ಹೇಳಿದಂತೆ ಉಪಾಸನೆ ಮಾಡುವವರು, ಗುಣಧರ್ಮವನ್ನು ಬೆಳೆಸಿಕೊಂಡವರು, ಭಕ್ತಿಯಿಂದ ಆಚರಣೆಗೆ ತಂದುಕೊಳ್ಳುವ ಭಕ್ತರು ನನಗೆ ಪರಮ ಪ್ರಿಯರು" ಎಂದು.**

**ಇತಿ ದ್ವಾದಶೋಽಧ್ಯಾಯಃ**

**ಹನ್ನೆರಡನೆಯ ಅಧ್ಯಾಯ ಮುಗಿಯಿತು**



# ಅಧ್ಯಾಯ ಹದಿಮೂರು

ಇದು ಭಗವದ್ಗೀತೆಯ ಮೂರನೇ ಷಟ್ಕದ ಮೊದಲ ಅಧ್ಯಾಯ. ಗೀತೆಯ ಈ ಹದಿಮೂರನೇ ಅಧ್ಯಾಯ ಒಂದು ಅಪೂರ್ವ ಅಧ್ಯಾಯ. ಈ ಹಿಂದಿನ ಹನ್ನೆರಡು ಅಧ್ಯಾಯಗಳಲ್ಲಿ ಏನು ಹೇಳಲಾಗಿದೆಯೋ ಅವೆಲ್ಲವನ್ನೂ ಸಂಗ್ರಹ ಮಾಡಿ ಈ ಅಧ್ಯಾಯದಲ್ಲಿ ಹೇಳಲಾಗಿದೆ. ಆದ್ದರಿಂದ ಹಿಂದಿನ ಎರಡು ಷಟ್ಕಗಳಲ್ಲಿ ಕಂಡ ವಿಷಯಗಳ ಪೂರ್ಣ ವಿಶ್ಲೇಷಣೆ ಈ ಅಧ್ಯಾಯ. ಜಡಪ್ರಪಂಚ, ಅದರಲ್ಲಿ ಪ್ರಕೃತಿಯಲ್ಲಿ ಬದ್ಧನಾಗಿ, ಪ್ರಕೃತಿಯಿಂದ ಪಾರಾಗಲು ಬಯಸುವ ಜೀವ. ಪಾರಾಗುವುದಕ್ಕೋಸ್ಕರ ಜ್ಞಾನದ ಅನುಸಂಧಾನ ಮತ್ತು ಸಾಧನೆ- ಈ ಎಲ್ಲಾ ವಿಷಯಗಳನ್ನು ನಾವು ಹಿಂದಿನ ಅಧ್ಯಾಯಗಳಲ್ಲಿ ವಿಕ್ಷಿಪ್ತವಾಗಿ ನೋಡಿದ್ದೇವೆ. ಅದೆಲ್ಲವುದರ ಒಂದು ಸಮಷ್ಠಿ ಸಂಗ್ರಹ(ಸರ್ವಾರ್ತ ಸಂಕ್ಷೇಪಃ) ಈ ಅಧ್ಯಾಯ. ಈ ಅಧ್ಯಾಯ ಗೀತೆಯಲ್ಲಿ ಅತ್ಯಂತ ಗ್ರಾಹ್ಯವಾದ ಅಧ್ಯಾಯ.

ಇಲ್ಲಿ ಪ್ರಾರಂಭದಲ್ಲಿ ಒಂದು ಶ್ಲೋಕವಿದೆ. ಈ ಅಧ್ಯಾಯದಲ್ಲಿ ಮುಂದೆ ಏನು ವಿವರಣೆ ಬರುತ್ತದೆ, ಅದನ್ನು ತಾನು ತಿಳಿಯಬೇಕೆಂದು ಅರ್ಜುನ ಕೃಷ್ಣನನ್ನು ಕೇಳುವ ಶ್ಲೋಕ. ಈ ಶ್ಲೋಕ ಹೀಗಿದೆ:

ಪ್ರಕೃತಿಂ ಪುರುಷಂ ಚೈವ ಕ್ಷೇತ್ರಂ ಕ್ಷೇತ್ರಜ್ಞಮೇವ ಚ ।
ಏತದ್ ವೇದಿತುಮಿಚ್ಛಾಮಿ ಜ್ಞಾನಂ ಜ್ಞೇಯಂ ಚ ಕೇಶವ ॥ * ॥

ಅರ್ಥಾತ್- "ಕೇಶವಾ, ನಾನಿದನ್ನು ತಿಳಿಯಬಯಸುತ್ತೇನೆ: ಪ್ರಕೃತಿಯನ್ನು, ಪುರುಷನನ್ನು, ಕ್ಷೇತ್ರವನ್ನು, ಕ್ಷೇತ್ರಜ್ಞನನ್ನು, ಜ್ಞಾನವನ್ನು ಮತ್ತು ಜ್ಞೇಯವನ್ನು".

ವಾಸ್ತವವಾಗಿ ಈ ಶ್ಲೋಕ ಭಗವದ್ಗೀತೆಯ ಶ್ಲೋಕವಲ್ಲ. ಪ್ರಾಚೀನ ಭಾಷ್ಯಕಾರರು ಯಾರೂ ಈ ಶ್ಲೋಕವನ್ನು ಗೀತೆಯ ಶ್ಲೋಕವೆಂದು ಪರಿಗಣಿಸಿಲ್ಲ. ಬಹಳ ಮಂದಿಯ ಅಭಿಪ್ರಾಯದಂತೆ ಇದು ಪ್ರಕ್ಷಿಪ್ತಶ್ಲೋಕ*. ಗೀತೆಯಲ್ಲಿ ಒಟ್ಟು ಏಳುನೂರು ಶ್ಲೋಕಗಳಿವೆ. ಅದಕ್ಕಾಗಿ ಗೀತೆಯನ್ನು 'ಸಪ್ತಶತಿ' ಎಂದು ಕರೆಯುತ್ತಾರೆ. [ಇದಕ್ಕಾಗಿ ವಾದಿರಾಜರು ತಮ್ಮ ಯುಕ್ತಿಮಲ್ಲಿಕಾದಲ್ಲಿ ಬ್ರಹ್ಮಸೂತ್ರ ಮತ್ತು ಭಗವದ್ಗೀತೆಯನ್ನು ರಚಿಸಿದ ವೇದವ್ಯಾಸರನ್ನು 'ಸೂತ್ರಸಪ್ತಶತೀಪತೇ' ಎಂದು ಸಂಬೊಧಿಸಿದ್ದಾರೆ]. ಇಂತಹ ಏಳುನೂರು ಶ್ಲೋಕಗಳಿರುವ ಭಗವದ್ಗೀತೆಗೆ ಈ ಮೇಲಿನ ಶ್ಲೋಕವನ್ನು ಸೇರಿಸಿದರೆ ಒಟ್ಟು ಏಳುನೂರ ಒಂದು ಶ್ಲೋಕವಾಗುತ್ತದೆ. ಇನ್ನು ಈ ಶ್ಲೋಕದಲ್ಲಿ ಕೇಳಲಾದ ಪ್ರಶ್ನೆಗೆ ಸಂಬಂಧಪಟ್ಟಂತೆ ಹಿಂದಿನ ಅಧ್ಯಾಯದ ಕೊನೆಯಲ್ಲಿ ಎಲ್ಲೂ ಕೃಷ್ಣ ಉಲ್ಲೇಖ ಮಾಡಿಲ್ಲ. ಈ ಕಾರಣದಿಂದ ಇಲ್ಲಿ ಅರ್ಜುನ ಈ ರೀತಿ ಪ್ರಶ್ನೆ ಮಾಡುವ ಸಾಧ್ಯತೆ ಇಲ್ಲ. ಆದ್ದರಿಂದ ಈ ಶ್ಲೋಕ ಪ್ರಕ್ಷಿಪ್ತಶ್ಲೋಕ. ಗೀತೆಯ ಏಳುನೂರು ಶ್ಲೋಕಗಳಲ್ಲಿ ಇದು ಸೇರಿಲ್ಲ.
ನೇರವಾಗಿ ಕೃಷ್ಣ ಅರ್ಜುನನಿಗೆ ಕ್ಷೇತ್ರ ಮತ್ತು ಕ್ಷೇತ್ರಜ್ಞ ಎನ್ನುವುದರ ಶಾಸ್ತ್ರೀಯ ಅರ್ಥವನ್ನು ವಿವರಿಸುವುದರೊಂದಿಗೆ ಈ ಅಧ್ಯಾಯ ಆರಂಭವಾಗುತ್ತದೆ.

ಭಗವಾನುವಾಚ ।
ಇದಂ ಶರೀರಂ ಕೌಂತೇಯ ಕ್ಷೇತ್ರಮಿತ್ಯಭಿಧೀಯತೇ ।
ಏತದ್ ಯೋ ವೇತ್ತಿ ತಂ ಪ್ರಾಹುಃ ಕ್ಷೇತ್ರಜ್ಞ ಇತಿ ತದ್ವಿದಃ ॥೧॥

ಭಗವಾನ್ ಉವಾಚ-ಭಗವಂತ ಹೇಳಿದನು:
ಇದಮ್ ಶರೀರಮ್ ಕೌಂತೇಯ ಕ್ಷೇತ್ರಮ್ ಇತಿ ಅಭಿಧೀಯತೇ ।
ಏತತ್ ಯಃ ವೇತ್ತಿ ತಮ್ ಪ್ರಾಹುಃ ಕ್ಷೇತ್ರಜ್ಞಃ ಇತಿ ತತ್ ವಿದಃ -ಭಗವಂತನ ಶರೀರದಂತಿರುವ ಈ ಚರಾಚರ ವಿಶ್ವ 'ಕ್ಷೇತ್ರ' ಎನಿಸಿದೆ. ಇದನ್ನು ಅರಿತವನನ್ನು ಬಲ್ಲವರು 'ಕ್ಷೇತ್ರಜ್ಞ' ಎನ್ನುತ್ತಾರೆ.

'ಕ್ಷೇತ್ರ' ಅನ್ನುವ ಪದಕ್ಕೆ ಒಂದು ನಿಶ್ಚಿತ ಅರ್ಥವಿಲ್ಲ. ಈ ಶ್ಲೋಕದಲ್ಲಿ ಕ್ಷೇತ್ರಂ ಅನ್ನುವ ಪದವನ್ನು ಯಾವ ರೀತಿ ಅರ್ಥಮಾಡಿಕೊಳ್ಳಬೇಕು ಎನ್ನುವ ಸುಳಿವನ್ನು ಕೃಷ್ಣ ಕೊಟ್ಟಿದ್ದಾನೆ. ಕ್ಷೇತ್ರ ಎಂದರೆ 'ಇದಂ ಶರೀರಂ' ಎಂದಿದ್ದಾನೆ ಕೃಷ್ಣ. ಆದ್ದರಿಂದ ಇಲ್ಲಿ ಕ್ಷೇತ್ರ ಎಂದರೆ ಜೀವ ವಾಸಮಾಡುವ ನೆಲೆಮನೆ, ಪಿಂಡಾಂಡದಿಂದ- ಬ್ರಹ್ಮಾಂಡದ ತನಕ ಎಲ್ಲವೂ ಹೌದು. ಈ ಬ್ರಹ್ಮಾಂಡಕ್ಕೆ 'ಕ್ಷೇತ್ರ ಮತ್ತು ಶರೀರ' ಅನ್ನುವುದು ಅನ್ವರ್ಥನಾಮ(**epithet**). ಇಂತಹ ಕ್ಷೇತ್ರವನ್ನು ಯಾರು ಸಮಗ್ರವಾಗಿ ತಿಳಿದಿದ್ದಾನೋ ಅವನು 'ಕ್ಷೇತ್ರಜ್ಞ'. ಯಾರೀತ? ಮುಂದಿನ ಶ್ಲೋಕದಲ್ಲಿ ನೋಡೋಣ.

ಕ್ಷೇತ್ರಜ್ಞಂ ಚಾಪಿ ಮಾಂ ವಿದ್ಧಿ ಸರ್ವಕ್ಷೇತ್ರೇಷು ಭಾರತ ।
ಕ್ಷೇತ್ರಕ್ಷೇತ್ರಜ್ಞಯೋರ್ಜ್ಞಾನಂ ಯತ್ ತಜ್ ಜ್ಞಾನಂ ಮತಂ ಮಮ ॥೨॥

ಕ್ಷೇತ್ರಜ್ಞಮ್ ಚ ಅಪಿ ಮಾಮ್ ವಿದ್ಧಿ ಸರ್ವ ಕ್ಷೇತ್ರೇಷು ಭಾರತ ।
ಕ್ಷೇತ್ರ ಕ್ಷೇತ್ರಜ್ಞಯೋಃ ಜ್ಞಾನಮ್ ಯತ್ ತತ್ ಜ್ಞಾನಮ್ ಮತಮ್ ಮಮ -ಓ ಭಾರತಾ, ಎಲ್ಲಾ ಕ್ಷೇತ್ರಗಳಲ್ಲಿ ನೆಲೆಸಿರುವ ನನ್ನನ್ನೇ 'ಕ್ಷೇತ್ರಜ್ಞ'ನೆಂದು ತಿಳಿ. ಕ್ಷೇತ್ರ ಮತ್ತು ಕ್ಷೇತ್ರಜ್ಞರ ಅರಿವೇ ನಿಜವಾದ 'ಜ್ಞಾನ' ಎನ್ನುವುದು ನನ್ನ ಅಭಿಪ್ರಾಯ.

ಒಳಗೂ ಹೊರಗೂ ತುಂಬಿರುವ, ಎಲ್ಲಾ ಕ್ಷೇತ್ರದಲ್ಲಿರುವ ಭಗವಂತನೇ ಕ್ಷೇತ್ರಜ್ಞ. ಜೀವ ಕೇವಲ ಕ್ಷೇತ್ರಸ್ಥ. ನಿಜವಾದ ಜ್ಞಾನವೆಂದರೆ ವಿಶ್ವದ ಅರಿವು; ವಿಶ್ವದಲ್ಲಿ ತುಂಬಿರುವ ಭಗವಂತನ ಅರಿವು. ಈ ವಿಶ್ವದೊಳಗೆ ನಾವು ಹೇಗಿದ್ದೇವೆ? ಈ ವಿಶ್ವ ನಮಗೆ ಹೇಗೆ ಬಂಧಕವಾಗಿದೆ? ಈ ಬಂಧನವನ್ನು ಕಳಚಿಕೊಂಡು ಆ ವಿಶ್ವಾತ್ಮ ಭಗವಂತನನ್ನು ನಾವು ಸೇರುವುದು ಹೇಗೆ? ಈ ಅರಿವೇ ಜ್ಞಾನ. ಹಿಂದಿನ ಅಧ್ಯಾಯದಲ್ಲಿ ಹೇಳಿದಂತೆ ನಾವು ಹದಿನೈದು ಬೇಲಿಗಳ ಸೆರೆಮನೆಯಲ್ಲಿದ್ದೇವೆ. ಆದರೆ ಇದು ಶಿಕ್ಷೆಯಲ್ಲ, ಶಿಕ್ಷಣ. ಈ ಬಂಧನದಿಂದ ಪಾರಾಗಬೇಕಾದರೆ ಭವಮೋಚಕನಾದ ಕ್ಷೇತ್ರಜ್ಞನನ್ನು ತಿಳಿಯಬೇಕು. ಈ ಎಚ್ಚರವೇ ನಿಜವಾದ ಜ್ಞಾನ.

ತತ್ ಕ್ಷೇತ್ರಂ ಯಚ್ಚ ಯಾದೃಕ್ ಚ ಯದ್ ವಿಕಾರಿ ಯತಶ್ಚ ಯತ್ ।
ಸ ಚ ಯೋ ಯತ್ ಪ್ರಭಾವಶ್ಚ ತತ್ ಸಮಾಸೇನ ಮೇ ಶೃಣು ॥೩॥

ತತ್ ಕ್ಷೇತ್ರಮ್ ಯತ್ ಚ ಯಾದೃಕ್ ಚ ಯತ್ ವಿಕಾರಿ ಯತಃ ಚ ಯತ್ ।
ಸಃ ಚ ಯಃ ಯತ್ ಪ್ರಭಾವಃ ಚ ತತ್ ಸಮಾಸೇನ ಮೇ ಶೃಣು – ಆ ಕ್ಷೇತ್ರವೆಂದರೇನು? ಅದು ಎಂತಹದು? ಅದರ ವಿಕಾರಗಳೇನು? ಅದರ ಪ್ರೇರಕ ಶಕ್ತಿ ಯಾರು? ಅವನು ಎಂತವನು ? ಅವನ ಹಿರಿಮೆಗಳೇನು? ಅದನ್ನು ಅಡಕವಾಗಿ ನನ್ನಿಂದ ಕೇಳು.

ಮೊದಲು ಕ್ಷೇತ್ರವೆಂದರೇನು? ಬ್ರಹ್ಮಾಂಡ ಮತ್ತು ಪಿಂಡಾಂಡ ಹೇಗೆ ಮತ್ತು ಯಾವುದರಿಂದ ನಿರ್ಮಾಣವಾಗಿದೆ? ಅದರ ಗುಣಧರ್ಮವೇನು? ಅದು ಯಾವ ಯಾವ ರೀತಿ ರೂಪಾಂತರಗೊಳ್ಳುತ್ತದೆ? ಈ ಬದಲಾವಣೆಗಳು ಹೇಗಾಗುತ್ತದೆ? ಯಾರಿಂದ ಆಗುತ್ತದೆ? ಇದೆಲ್ಲವನ್ನು ಸೂತ್ರರೂಪವಾಗಿ ಸಂಕ್ಷಿಪ್ತವಾಗಿ, ಚುಟುಕಾಗಿ ನನ್ನಿಂದ ಕೇಳು.

ಋಷಿಭಿರ್ಬಹುಧಾ ಗೀತಂ ಛಂದೋಭಿರ್ವಿವಿಧೈಃ ಪೃಥಕ್ ।
ಬ್ರಹ್ಮಸೂತ್ರಪದೈಶ್ಚೈವ ಹೇತುಮದ್ಭಿರ್ವಿನಿಶ್ಚಿತೈಃ ॥೪॥

ಋಷಿಭಿಃ ಬಹುಧಾ ಗೀತಮ್ ಛಂದೋಭಿಃ ವಿವಿಧೈಃ ಪೃಥಕ್ ।
ಬ್ರಹ್ಮಸೂತ್ರಪದೈಃ ಚ ಏವ ಹೇತುಮದ್ಭಿಃ ವಿನಿಶ್ಚಿತೈಃ –ಬಗೆಬಗೆಯ ಬೇರೆಬೇರೆ ಮಂತ್ರಗಳಿಂದ ಋಷಿಗಳು ಅದನ್ನು ಬಗೆಬಗೆಯಿಂದ ಹಾಡಿದ್ದಾರೆ. ಯುಕ್ತಿಯಿಂದ ನಿರ್ಣಯಿಸುವ ವೇದಾಂತ ಸೂತ್ರದ ನುಡಿಗಳೂ ಕೂಡಾ.

ಜ್ಞಾನಿಗಳು ಕೂಡಾ ಈ ವಿಚಾರವನ್ನು ಒಬ್ಬೊಬ್ಬರು ಒಂದೊಂದು ರೀತಿ ಹೇಳುತ್ತಾರೆ. ಅದು ಅವರ ಅನುಭವಕ್ಕೆ ಸೀಮಿತವಾಗಿರುತ್ತದೆ. ಬ್ರಹ್ಮಸೂತ್ರದಲ್ಲಿ ಹೇಳಿರುವ ವಿಚಾರ ಸುಲಭವಾಗಿ ಅರ್ಥವಾಗದು. ಆದ್ದರಿಂದ ನಿಜವನ್ನು ಕ್ಷೇತ್ರಜ್ಞನಾದ ನಾನೇ ನೇರವಾಗಿ ಹೇಳುತ್ತೇನೆ ಕೇಳು.

ಮಹಾಭೂತಾನ್ಯಹಂಕಾರೋ ಬುದ್ಧಿರವ್ಯಕ್ತಮೇವ ಚ ।
ಇಂದ್ರಿಯಾಣಿ ದಶೈಕಂ ಚ ಪಂಚ ಚೇಂದ್ರಿಯಗೋಚರಾಃ ॥೫॥

ಇಚ್ಛಾ ದ್ವೇಷಃ ಸುಖಂ ದುಃಖಂ ಸಂಘಾತಶ್ಚೇತನಾ ಧೃತಿಃ ।
ಏತತ್ ಕ್ಷೇತ್ರಂ ಸಮಾಸೇನ ಸವಿಕಾರಮುದಾಹೃತಮ್ ॥೬॥

ಮಹಾಭೂತಾನಿ[ಮಹಾನ್ ಭೂತಾನಿ]ಅಹಂಕಾರಃ ಬುದ್ಧಿಃ ಅವ್ಯಕ್ತಮ್ ಏವ ಚ।
ಇಂದ್ರಿಯಾಣಿ ದಷ ಏಕಮ್ ಚ ಪಂಚ ಚ ಇಂದ್ರಿಯ ಗೋಚರಾಃ ॥

ಇಚ್ಛಾ ದ್ವೇಷಃ ಸುಖಂ ದುಃಖಂ ಸಂಘಾತಃ ಚೇತನಾ ಧೃತಿಃ ।

ಏತತ್ ಕ್ಷೇತ್ರಂ ಸಮಾಸೇನ ಸವಿಕಾರಮ್ ಉದಾಹೃತಮ್ -- ಮಣ್ಣು[ಪೃಥಿವಿ], ನೀರು[ವರುಣ], ಬೆಂಕಿ[ಅಗ್ನಿ], ಗಾಳಿ[ವಾಯುಪುತ್ರ ಮರೀಚಿ], ಬಾನು[ಅವಕಾಶ ದೇವತೆ, ವಿಘ್ನನಾಶ-ವಿನಾಯಕ-ಗಣಪತಿ]-ಎಂಬ ಐದು ಮಹಾಭೂತಗಳು. ಅಹಂಕಾರತತ್ವ [ಬ್ರಹ್ಮವಾಯು ಮತ್ತು ಶಿವ], ಬುದ್ಧಿತತ್ವ[ಪಾರ್ವತಿ], ಮೂಲಪ್ರಕೃತಿ[ಶ್ರೀ], ಕಿವಿ[ಚಂದ್ರ], ತೊಗಲು[ವಾಯುಪುತ್ರ ಮರುತ್], ಕಣ್ಣು[ಸೂರ್ಯ], ನಾಲಿಗೆ[ವರುಣ], ಮೂಗು[ಅಶ್ವಿಗಳು], ಬಾಯಿ[ಅಗ್ನಿ], ಕೈಗಳು[ವಾಯುಪುತ್ರರಿಬ್ಬರು], ಕಾಲುಗಳು[ಇಂದ್ರ ಪುತ್ರರಾದ ಯಜ್ಞ(ಜಯತ) ಮತ್ತು ಶಂಭು], ಪಾಯು[ಯಮ], ಉಪಸ್ಥ[ಲಿಂಗ ದೇವತೆ ಶಿವ-ಗಂಡಸರಲ್ಲಿ ; ಸ್ವಾಯಂಭುವಮನು-ಸ್ತ್ರೀಯರಲ್ಲಿ] ಹೀಗೆ ಹತ್ತು ಇಂದ್ರಿಯಗಳು. ಹನ್ನೊಂದನೆಯದು ಮನಸ್ತತ್ವ[ಇಂದ್ರ, ಕಾಮ ಮತ್ತು ಅನಿರುದ್ಧ] ಮತ್ತು ಐದು ಜ್ಞಾನೇಂದ್ರಿಯ ವಿಷಯಗಳು: ಶಬ್ದ, ಸ್ಪರ್ಶ, ರೂಪ, ರಸ ಮತ್ತು ಗಂಧ[ರುದ್ರ ಪುತ್ರರಾದ ಪ್ರಾಣ, ಅಪಾನ, ವ್ಯಾನ, ಉದಾನ ಮತ್ತು ಸಮಾನ]ಇವು ೨೪ ಅಡಕವಾಗಿ ಕ್ಷೇತ್ರಗಳು.

ಬಯಕೆ[ಶ್ರೀ ಮತ್ತು ಭಾರತಿ], ದ್ವೇಷ[ದ್ವಾಪರ-ಶಕುನಿ], ಸುಖ[ಮುಖ್ಯಪ್ರಾಣ-ವಾಯು-ಭೀಮ], ದುಃಖ[ಕಲಿ-ದುರ್ಯೋಧನ], ಸಮಷ್ಟಿಶರೀರ[ಶರೀರದಲ್ಲಿರುವ ಅಭಿಮಾನಿ ಜೀವ; ಸಮಸ್ತ ಅಭಿಮಾನಿ ದೇವತೆಗಳು], ನೆನಪಿನ ಹರಹು[ಶ್ರೀ], ಧೈರ್ಯ[ಸರಸ್ವತಿ ಮತ್ತು ಭಾರತಿ] ಇವು ಏಳು ವಿಶೇಷ ಕ್ರಿಯೆಗಳಾದ ವಿಕಾರಗಳು. ಹೀಗೆ ವಿಕಾರಗಳ ಜೊತೆಗೆ ಕ್ಷೇತ್ರವನ್ನು ಅಡಕವಾಗಿ ಹೇಳಿದ್ದಾಯಿತು.

ಈ ಎರಡು ಶ್ಲೋಕಗಳಲ್ಲಿ ಕೃಷ್ಣ ಕ್ಷೇತ್ರ ಮತ್ತು ಕ್ಷೇತ್ರದ ವಿಕಾರವನ್ನು ವಿವರಿಸಿದ್ದಾನೆ. ಕ್ಷೇತ್ರ ಎನ್ನುವ ಅಖಂಡ ಘಟಕದೊಳಗೆ ಇರುವ ಜಗತ್ತಿನ ಘಟಕಾಂಶಗಳನ್ನು ಕೃಷ್ಣ ಇಲ್ಲಿ ಸೂತ್ರ ರೂಪದಲ್ಲಿ ಅಡಕವಾಗಿ ವಿವರಿಸಿದ್ದಾನೆ. ಮೊದಲನೆಯದಾಗಿ ಪಂಚಮಹಾಭೂತಗಳು. ಈ ಐದರಿಂದ ಈ ಪಿಂಡಾಂಡ ಮತ್ತು ಬ್ರಹ್ಮಾಂಡ ನಿರ್ಮಾಣವಾಗಿದೆ. ಈ ಕಾರಣಕ್ಕಾಗಿ ಬ್ರಹ್ಮಾಂಡವನ್ನು 'ಪ್ರ-ಪಂಚ' ಎಂದು ಕರೆಯುತ್ತಾರೆ. ಈ ಪಂಚ ಮಹಾಭೂತಗಳೇ ಪ್ರಪಂಚದ ಮೂಲದ್ರವ್ಯ. ಪಿಂಡಾಂಡದಲ್ಲಿ ಈ ಪಂಚ ಮಹಾಭೂತಗಳನ್ನು ಅನ್ನಮಯ ಮತ್ತು ಪ್ರಾಣಮಯ ಎಂದು ಕರೆಯತ್ತಾರೆ. ಕಾಣುವ ಸ್ಥೂಲ ಶರೀರ ಪ್ರಥಿವಿ ಮತ್ತು ನೀರಿನ ಭಾಗದಿಂದಾಗಿದೆ. ಇಂತಹ ಸ್ಥೂಲ ಶರೀರದೊಳಗೆ ಕಾಣದ ಪ್ರಾಣಮಯಕೋಶವಿದೆ. ದೇಹದ ಶಾಖ(ಬೆಂಕಿ), ಉಸಿರಾಟ(ಗಾಳಿ) ಮತ್ತು ಒಳಗೆ ರಕ್ತ-ಗಾಳಿ ಸಂಚಾರದ ಅವಕಾಶ(ಆಕಾಶ). ಇದರಿಂದಾಚೆಗೆ ಮನಸ್ಸು ಮತ್ತು ಬುದ್ಧಿಯನ್ನೊಳಗೊಂಡ ಮನೋಮಯಕೋಶ, ಅದರಿಂದಾಚೆಗೆ ವಿಜ್ಞಾನಮಯಕೋಶ-ಸ್ಮರಣಶಕ್ತಿ. ಆದ್ದರಿಂದ ಬುದ್ದಿಗೆ ಮೊದಲು ಅಹಂಕಾರ ಮತ್ತು ಚಿತ್ತ. ಇಲ್ಲಿ ಅಹಂಕಾರ ಅಂದರೆ 'ನನ್ನ ಅಸ್ತಿತ್ವದ ಅರಿವು(awareness of self)'. ಈ ಅಹಂಕಾರ ತತ್ವ ಪಿಂಡಾಂಡದಲ್ಲಿ ಚಿತ್ತ, ಬ್ರಹ್ಮಾಂಡದಲ್ಲಿ ಮಹತತ್ವ.

ವ್ಯಕ್ತವಾಗುವ ಈ ಪ್ರಪಂಚದ ಮೂಲ ಅವ್ಯಕ್ತ. ಸೃಷ್ಟಿಯ ಮೂಲಸ್ಥಿತಿ-ಪ್ರಳಯಸಾಗರ. ಅಂದರೆ ಪರಮಾಣುರೂಪದಲ್ಲಿ ಚದುರಿಕೊಂಡಿರುವ ಅವ್ಯಕ್ತ ಪ್ರಪಂಚ. ಇಂತಹ ಪ್ರಪಂಚದಲ್ಲಿ ಚತುರ್ಮುಖ ಮಹತತ್ವವನ್ನು ಸೃಷ್ಟಿ ಮಾಡಿದ. ಪ್ರಳಯ ಸಾಗರದಲ್ಲಿ ತನ್ನ ಅಸ್ತಿತ್ವದ ಅರಿವಿಲ್ಲದೇ ಇದ್ದ ಜೀವಗಳಿಗೆ 'ನಾನು' ಎನ್ನುವ ಅರಿವು ಬರುವುದೇ ಮಹತತ್ವದ ಸೃಷ್ಟಿ. ಚಿತ್ತದ ವ್ಯಾಪ್ತಿ ಚೇತನ. ಇದು ನಮ್ಮ ನೆನಪಿನ ವಿಸ್ತಾರ.

ಈ ಶರೀರದಲ್ಲಿ ಐದು ಜ್ಞಾನೇಂದ್ರಿಯಗಳು, ಐದು ಕರ್ಮೇಂದ್ರಿಯಗಳಿವೆ ಮತ್ತು ಹನ್ನೊಂದನೇ ಇಂದ್ರಿಯವಾಗಿರುವುದು ಮನಸ್ಸು. ಕಿವಿಯಿಂದ ಶಬ್ದಗ್ರಹಣ, ಕಣ್ಣಿನಿಂದ ರೂಪ ಗ್ರಹಣ, ಮೂಗಿನಿಂದ ಗಂಧ ಗ್ರಹಣ, ನಾಲಿಗೆಯಿಂದ ರಸ ಗ್ರಹಣ, ತೊಗಲಿನಿಂದ ಗಾಳಿಯ ಗ್ರಹಣ. ಅದೇ ರೀತಿ ಬಾಯಿ ಮಾತನಾಡಲು, ಕೈ ಕೆಲಸ ಮಾಡಲು, ಕಾಲು ನಡೆಯಲು. ಈ ಎಂಟನ್ನು ಗ್ರಹ(Receiver)ಗಳೆನ್ನುತ್ತಾರೆ. ನಂತರ ಪಾಯು ಮತ್ತು ಉಪಸ್ಥ(ವಿಸರ್ಜನಾಂಗ ಮತ್ತು ಸಂತಾನವೃದ್ಧಿ)ಗಳು. ಈ ಎಲ್ಲವನ್ನು ಚಿಂತನೆಗೊಳಪಡಿಸುವ ಹನ್ನೊಂದನೇ ಇಂದ್ರಿಯ ಮನಸ್ಸು. ಇವೆಲ್ಲವೂ ಕ್ಷೇತ್ರದ ಘಟಕಾಂಶಗಳು. ಸಮಷ್ಟಿಯಾಗಿ ಇದು ಕ್ಷೇತ್ರ. [ಇಲ್ಲಿ ಹೇಳಿರುವ ಪ್ರತಿಯೊಂದು ಘಟಕದೊಂದಿಗೆ ಅದರ ಅಭಿಮಾನಿ ದೇವತೆಯರೂ ಸೇರಿದ್ದಾರೆ. ಅದನ್ನು ಮೇಲೆ ಸಂಕ್ಷಿಪ್ತವಾಗಿ ಹೇಳಲಾಗಿದೆ]

ಈ ಜಗತ್ತು ಸದಾ ಬದಲಾಗುತ್ತಿರುತ್ತದೆ. ಅದಕ್ಕಾಗಿ ಜಗತ್ತನ್ನು ಅಶ್ವತ್ಥ ಎಂತಲೂ ಕರೆಯುತ್ತಾರೆ. ಅಶ್ವ ನಿರಂತರ ಚಲನೆಯಲ್ಲಿರುವ ಪ್ರಾಣಿ. ಅದು ನಿಶ್ಚಲವಾಗಿ ಇರುವುದೇ ಇಲ್ಲ. ಈ ಪ್ರಪಂಚ ಕೂಡಾ ಹಾಗೆ ಸದಾ ಚಲನೆಯಲ್ಲಿರುವುದರಿಂದ-ಅದನ್ನು ಪ್ರಾಚೀನರು ಅಶ್ವತ್ಥ ಎಂದು ಕರೆದರು. ನಮ್ಮ ದೇಹ ಅನ್ನುವುದು ಭೌತಿಕ ವಿಕಾರ. ಅದರಲ್ಲಿ ಆಗತಕ್ಕಂತಹ ಮಾನಸಿಕ ಪ್ರಪಂಚದ ಎಲ್ಲಾ ತೊಳಲಾಟ ಮಾನಸಿಕ ವಿಕಾರ. ವಿಶೇಷವಾಗಿ ನಮ್ಮ ಇಚ್ಛೆ(ಬಯಕೆ), (ಅ)ದ್ವೇಷ, ಸುಖ-ದುಃಖ, ನಮ್ಮ ನೆನಪಿನ ಹರವು (ಚೇತನ), (ಅ)ಧೃತಿ. ಇದು ಕೃಷ್ಣನ ಕ್ಷೇತ್ರ ಮತ್ತು ಅದರ ವಿಕಾರದ ಸೂತ್ರ ರೂಪದ ವಿವರಣೆ. ಈ ವಿಚಾರವನ್ನು ಎಷ್ಟು ವಿಸ್ತಾರವಾಗಿ ಬೇಕಾದರೂ ನಾವು ವಿಶ್ಲೇಷಿಸಬಹುದು. ಕೃಷ್ಣ ಇಲ್ಲಿ ಎಲ್ಲವನ್ನು ಅಡಕವಾಗಿ ವಿವರಿಸಿದ್ದಾನೆ.

ಜ್ಞಾನದ ದಾರಿಯಲ್ಲಿ ಸಾಗಬೇಕಿದ್ದರೆ ನಮ್ಮ ನಡತೆಯಲ್ಲಿ ನಾವು ಅನುಸರಿಸಬೇಕಾದ ಕೆಲವು ನೀತಿ ಸಂಹಿತೆ(code of conduct)ಗಳಿವೆ. ಅದನ್ನು ನಾವು ಅನುಸರಿಸಬೇಕು. ನಾವು ನಮ್ಮ ಜೀವನದಲ್ಲಿ ಅನುಸರಿಸಬೇಕಾದ ಇಪ್ಪತ್ತು ಗುಣ(discipline)ಗಳನ್ನು ಕೃಷ್ಣ ಮುಂದಿನ ಐದು ಶ್ಲೋಕಗಳಲ್ಲಿ ವಿವರಿಸುತ್ತಾನೆ. ಈ ಗುಣಗಳಲ್ಲಿ ಪ್ರತಿಯೊಂದನ್ನು ನಮ್ಮ ಜೀವನದಲ್ಲಿ ಎಷ್ಟು ಹೆಚ್ಚು ಅಳವಡಿಸಿಕೊಂಡೆವೋ ಅಷ್ಟು ನಾವು ಜ್ಞಾನ ದಾರಿಯಲ್ಲಿ ಸಾಗಬಹುದು. ಇಲ್ಲದಿದ್ದರೆ ನಾವು ಅಜ್ಞಾನದ ದಾರಿಯಲ್ಲಿ ಸಾಗಬೇಕಾಗುತ್ತದೆ ಎನ್ನುವ ಎಚ್ಚರವನ್ನು ಕೂಡಾ ಕೃಷ್ಣ ಇಲ್ಲಿ ಕೊಟ್ಟಿದ್ದಾನೆ.

ಅಮಾನಿತ್ವಮಡಂಭಿತ್ವಮಹಿಂಸಾ ಕ್ಷಾಂತಿರಾರ್ಜವಮ್ ।
ಆಚಾರ್ಯೋಪಾಸನಂ ಶೌಚಂ ಸ್ಥೈರ್ಯಮಾತ್ಮವಿನಿಗ್ರಹಃ ॥೭॥

ಅಮಾನಿತ್ವಮ್ ಅಡಂಭಿತ್ವಮ್ ಅಹಿಂಸಾ ಕ್ಷಾಂತಿಃ ಆರ್ಜವಮ್ ।
ಆಚಾರ್ಯ ಉಪಾಸನಮ್ ಶೌಚಮ್ ಸ್ಥೈರ್ಯಮ್ ಆತ್ಮವಿನಿಗ್ರಹಃ-- – ಬಿಂಕ ತೊರೆಯುವುದು, ಹಿರಿತನದ ಸೋಗು ಹಾಕದಿರುವುದು, ನೋಯಿಸದಿರುವುದು, ಸೈರಣೆ, ನೇರ ನಡೆ ನುಡಿ, ಗುರುಸೇವೆ, ಮೈಮನಗಳ ಮಡಿ, ಕದಲದ ತೀರ್ಪು, ಬಗೆಯ ಬಿಗಿತ,

(೧) ಅಮಾನಿತ್ವಮ್: ಜ್ಞಾನ ಗಳಿಸುವುದಕ್ಕಾಗಿ ನಾವು ಮಾನ-ಸಮ್ಮಾನದ ಬಯಕೆಯನ್ನು ಬಿಡಬೇಕು. ತನಗೆ ಸನ್ಮಾನವಾಗಬೇಕು, ಪ್ರಶಸ್ತಿ ಸಿಗಬೇಕು ಎನ್ನುವ ನಿರೀಕ್ಷೆಯಲ್ಲಿರುವವರಿಗೆ ಎಂದೂ ಜ್ಞಾನ ಸಿದ್ಧಿಯಾಗದು. ಅದಕ್ಕಾಗಿ ಪ್ರಚಾರಪ್ರಿಯತೆಯನ್ನು ನಾವು ಮೊದಲು ಬಿಡಬೇಕು. ಎಲ್ಲಾ ಪ್ರಚಾರಗಳಿಗೆ ತಿಲಾಂಜಲಿ ಕೊಟ್ಟು ಜ್ಞಾನದ ಬೆನ್ನು ಹತ್ತು- ಆಗ ಜ್ಞಾನ ದಕ್ಕುತ್ತದೆ. ಯಾರಾದರೂ ನಿನ್ನನ್ನು ಮೆಚ್ಚಿಕೊಂಡರೆ ಅದು ಅವರ ದೊಡ್ಡಸ್ತಿಕೆ-ಅಲ್ಲಿ ನಮ್ರತೆಯಿಂದಿರು.

(೨) ಅಡಂಭಿತ್ವಮ್ : ಎಲ್ಲರ ಮುಂದೆ ಸಣ್ಣವನಾಗಿ ಬದುಕಲು ಕಲಿ. ದೊಡ್ಡಸ್ತಿಕೆಯ ಪ್ರದರ್ಶನ ಬೇಡ. ಜ್ಞಾನ ಮಾರ್ಗದಲ್ಲಿ ಎಂದೂ ಪ್ರಾಮಾಣಿಕತೆಯಿಂದ ಅತ್ತ ಸರಿಯಬೇಡ. ಇಲ್ಲದ್ದನ್ನು ಇದೆ ಎಂದು ತೋರಿಸಲು ಹೋಗಬೇಡ.

(೩) ಅಹಿಂಸಾ : ಎಂದೂ ಇನ್ನೊಬ್ಬರನ್ನು ನೋಯಿಸಬೇಡ. ನಾವು ಇನ್ನೊಬ್ಬರ ಮನಸ್ಸನ್ನು ಘಾಸಿಗೊಳಿಸಿದರೆ ಅದನ್ನು ಮರಳಿ ವಾಸಿ ಮಾಡುವ ಯಾವ ಔಷಧವೂ ಇಲ್ಲ. ಆದ್ದರಿಂದ ಎಂದೂ ಇನ್ನೊಬ್ಬರನ್ನು ಮುಖಭಂಗ(Insult) ಮಾಡಬೇಡ. ಇನ್ನೊಬ್ಬರಿಗೆ ತೊಂದರೆ ಕೊಡದೇ ಇರುವುದು ಅಹಿಂಸೆ.

(೪) ಕ್ಷಾಂತಿಃ : ಪ್ರತೀಕಾರ ಮಾಡದೇ ಇರುವುದು. ಒಬ್ಬರು ನಮಗೆ ಕೇಡು ಬಗೆದಾಗ ನಾವು ಅದಕ್ಕೆ ಪ್ರತಿಕೇಡು ಬಗೆಯಲು ಹೋಗಬಾರದು. ತಪ್ಪು ಮಾಡಿದವರಿಗೆ ಶಿಕ್ಷೆ ಕೊಡಲು ಒಂದು ವ್ಯವಸ್ಥೆ ಇದೆ. ಲೌಕಿಕವಾಗಿ ನೋಡಿದರೆ, ಯಾರಾದರು ತಪ್ಪು ಮಾಡಿದಾಗ ಅವರಿಗೆ ಶಿಕ್ಷೆ ಕೊಡುವ ಜವಾಬ್ಧಾರಿ ಆರಕ್ಷಕ ಮತ್ತು ನ್ಯಾಯಾಂಗ ವ್ಯವಸ್ಥೆಯದೇ ಹೊರತು ನಮ್ಮದಲ್ಲ. ಒಂದು ವೇಳೆ ನಾವು ತಪ್ಪು ಮಾಡಿದವರಿಗೆ ಶಿಕ್ಷೆ ಕೊಡಲು ಹೊರಟರೆ ಅದು ಕಾನೂನನ್ನು ಕೈಯಲ್ಲಿ ತೆಗೆದುಕೊಂಡ ಅಪರಾಧವಾಗುತ್ತದೆ. ಅದೇ ರೀತಿ ಭಗವಂತನ ರಾಜ್ಯದಲ್ಲಿ ತಪ್ಪು ಮಾಡಿದವರಿಗೆ ಶಿಕ್ಷೆ ಕೊಡಲು ಪ್ರತ್ಯೇಕ ವ್ಯವಸ್ಥೆ ಇದೆ. ಆದ್ದರಿಂದ ನಿನಗೆ ಪ್ರತೀಕಾರ ತೆಗೆದುಕೊಳ್ಳುವುದಕ್ಕಾಗಲೀ ಶಾಪ ಹಾಕುವುದಕ್ಕಾಗಲೀ ಹಕ್ಕಿಲ್ಲ.

ಈ ಮೇಲಿನ ಗುಣಗಳಿಗೆ ಉತ್ತಮ ದೃಷ್ಟಾಂತ ಜಡಭರತ ಮತ್ತು ರೈಕ್ವ ಮುನಿ. ಇವರ ಜೀವನ ಚರಿತ್ರೆಯನ್ನು ಓದಿದರೆ ಅವರು ಈ ಗುಣವನ್ನು ತಮ್ಮ ಜೀವನದಲ್ಲಿ ಹೇಗೆ ಪಾಲಿಸಿದ್ದರು ಎನ್ನುವುದು ತಿಳಿಯುತ್ತದೆ.

(೫) ಆರ್ಜವಮ್ : ಮುಖವಾಡವಿಲ್ಲದ ಬದುಕು. ನೇರ ನಡೆ ನುಡಿ. ಒಳಗೊಂದು ಹೊರಗೊಂದು ಇಲ್ಲದ ಪ್ರಾಮಾಣಿಕ ಬದುಕು(Sincerity-Straightforwardness).

(೬) ಆಚಾರ್ಯೋಪಾಸನಮ್: ಆಚಾರ್ಯ ಎಂದರೆ ಯಾವುದು ಸರಿ ಯಾವುದು ತಪ್ಪು ಎಂದು ಚೆನ್ನಾಗಿ ತಿಳಿದು ಅದನ್ನು ಆಚರಣೆಗೆ ತರುವವರು. ತಾವು ಸತ್ಯವನ್ನು ಕಂಡು, ಸಮಾಜದ ಮುಂದೆ ಅದನ್ನು ನಡೆದು ತೋರಿಸುವವರು. ಅಂಥವರ ಸೇವೆ ಮಾಡು. ಜ್ಞಾನಿಗಳು ಸುಲಭವಾಗಿ ಸಿಗುವುದಿಲ್ಲ ಮತ್ತು ಅವರು ಸಾಮಾನ್ಯವಾಗಿ ಪರೀಕ್ಷಿಸದೆ ಜ್ಞಾನ ಧಾರೆ ಮಾಡುವುದಿಲ್ಲ. ಏನೇ ಆದರೂ ಜ್ಞಾನಿಗಳ ಬೆನ್ನುಬಿಡಬೇಡ. ನಿನ್ನಲ್ಲಿರುವ ಜ್ಞಾನ ತೃಷೆ ಗಾಢವಾಗಿದ್ದಲ್ಲಿ ಖಂಡಿತವಾಗಿ ಅವರು ಜ್ಞಾನ ಧಾರೆ ಮಾಡುತ್ತಾರೆ. ಜ್ಞಾನ ಬೇಕಿದ್ದರೆ ಜ್ಞಾನಿಗಳು ತೆರೆದುಕೊಳ್ಳುವ ತನಕ ಕಾಯಬೇಕು. ಇದಕ್ಕೆ ಉತ್ತಮ ದೃಷ್ಟಾಂತ ಶ್ವೇತಕೇತು ಮತ್ತು ಪ್ರಶ್ನೋಪನಿಷತ್ತಿನಲ್ಲಿ ಬರುವ ಪಿಪ್ಪಲಾದರ ಕಥೆ.

(೭) ಶೌಚಮ್: ಶೌಚ ಎಂದರೆ ಶುಚಿತ್ವ. ಈ ವಿಷಯವನ್ನು ಹಿಂದಿನ ಅಧ್ಯಾಯದಲ್ಲಿ ಸ್ವಲ್ಪ ಮಟ್ಟಿಗೆ ನೋಡಿದ್ದೇವೆ. ಕನ್ನಡದಲ್ಲಿ ಶೌಚಮ್ ಎಂದರೆ 'ಮಡಿ'. ನಾವು ಮಡಿ ಮಾಡುವುದನ್ನು ಬಿಟ್ಟು ಮಡಿಯಾಗುವುದನ್ನು ಕಲಿಯಬೇಕು.

ಸ್ನಾನ ಮಾಡಿ ಒದ್ದೆ ಬಟ್ಟೆ ಉಟ್ಟು ಯಾರನ್ನೂ ಮುಟ್ಟದೆ ಇದ್ದರೆ ಮಡಿಯಾಗಲು ಸಾಧ್ಯವಿಲ್ಲ. ಶುಚಿ ಎನ್ನುವುದು ಮೂಲಭೂತವಾಗಿ ಮನಸ್ಸಿಗೆ ಸಂಬಂಧಪಟ್ಟದ್ದು. ಅದಕ್ಕೆ ಪೂರಕವಾಗಿ ದೇಹ ಶುದ್ಧಿ. ಪ್ರಾಪಂಚಿಕ ವಿಚಾರವನ್ನು ಮರೆತು, ಮನಸ್ಸನ್ನು ಭಗವಂತನಲ್ಲಿ ನೆಲೆ ನಿಲ್ಲಿಸುವುದು ಮಡಿ. ನಾವು ಕಾಯಾ-ವಾಚಾ-ಮನಸಾ ಮಡಿಯಾಗಬೇಕು. ನಮ್ಮಲ್ಲಿ ಕೆಟ್ಟ ಯೋಚನೆ ಬಂದರೆ, ಕೆಟ್ಟ ಮಾತು ಬಾಯಲ್ಲಿ ಬಂದರೆ- ಆಗ ನಾವು ಮೈಲಿಗೆ. ನಿಜವಾಗಿ ಕಾಯ-ವಾಚಾ-ಮನಸಾ ಮಡಿಯಾಗಿರುವವ ಮೈಲಿಗೆಯವರೊಂದಿಗಿದ್ದರೆ ಜೊತೆಗಿರುವವರೆಲ್ಲರೂ ಮಡಿಯಾಗಬಹುದು. ಇದನ್ನೇ ಹಿಂದೆ 'ಪಂಕ್ತಿಪಾವನ' ಎಂದು ಕರೆಯುತ್ತಿದ್ದರು. ಪೂರ್ಣ ಮಡಿಯಾಗಿರುವವ ಯಾವ ಪಂಕ್ತಿಯಲ್ಲಿ ಕುಳಿತನೋ ಆ ಪಂಕ್ತಿ ಮಡಿ. ಶಾಸ್ತ್ರ ಜ್ಞಾನವಿಲ್ಲದ ಮಡಿ ಮಡಿಯಲ್ಲ. ದೇವರ ಸ್ಮರಣೆ ಮನಸ್ಸಿನಲ್ಲಿ, ದೇವರ ನಾಮ ಬಾಯಿಯಲ್ಲಿ ಇದ್ದಾಗ ನಾವು ಮಡಿ.

ಮನಸ್ಸನ್ನು ಶುದ್ಧ ಮಾಡುವುದಕ್ಕೋಸ್ಕರ ಆಚಮನ ಮತ್ತು ಪ್ರಾಣಾಯಾಮ. "ಓ ಭಗವಂತಾ, ನಿನ್ನ ಕಾರುಣ್ಯಧಾರೆಯಿಂದ ನನ್ನ ಸಹಸ್ರಾರದಿಂದ ಅಮೃತವನ್ನು ಕೆಳಕ್ಕೆ ಇಳಿಸಿ, ನನ್ನ ಇಡೀ ಮೈ ಪಾವನವಾಗುವಂತೆ ಮಾಡು, ನನ್ನೊಳಗಿನ ಎಲ್ಲಾ ಪಾಪಗಳೂ ಕೊಳೆಗಳೂ ಸುಟ್ಟು ತೊಳೆದುಹೋಗಲಿ" ಎನ್ನುವ ಅನುಸಂಧಾನದಿಂದ, ಧ್ಯಾನಪೂರ್ವಕ ಪಾಪಪುರುಷ ನಿರಸನ ಮಾಡಬೇಕು. ಇಲ್ಲಿ ನಮ್ಮ ತಲೆಯಿಂದ ಅಮೃತಧಾರೆ ಇಳಿದು ಬರುವುದನ್ನು ನಾವು ಅನುಭವಿಸಬೇಕು(Feel it). ಪ್ರಾಣಾಯಾಮದಿಂದ ನಮ್ಮೊಳಗಿನ ಎಲ್ಲಾ ಕೊಳೆ ಸುಟ್ಟು ಹೋಗುತ್ತದೆ. ನಮ್ಮ ಅಂಗಾಂಗದಲ್ಲಿ ಕೂತ ಭಗವಂತನ ಸ್ಮರಣೆಯೇ ಆಚಮನ. "ಓ ನೀರೇ, ನೀನು ಸುಖದ ಸೆಲೆ, ನೀನು ಸುಖದ ನೆಲೆ, ನಿನ್ನನ್ನು ಪ್ರೋಕ್ಷಿಸಿಕೊಳ್ಳುತ್ತಿದ್ದೇನೆ. ಆ ಭಗವಂತ ನನ್ನಲ್ಲಿ ಬಂದು ನೆಲೆಸುವಂತೆ ಮಾಡು" ಎಂದು ಪ್ರಾರ್ಥಿಸಿ ಪ್ರೋಕ್ಷಣೆಮಾಡಿಕೊಳ್ಳಬೇಕು. ಇದೆಲ್ಲವನ್ನೂ ನಾವು ತಿಳಿದು ಮಾಡಿದಾಗ ಮಾತ್ರ ಮಡಿಯಾಗುತ್ತೇವೆ. ದೇವರನ್ನು ನೆನೆಯುವುದೇ ಮಡಿ. ದೇವರನ್ನು ಮರೆಯುವುದೇ ಮೈಲಿಗೆ. ಪುಂಡರೀಕಾಕ್ಷನ ಸ್ಮರಣೆ ಇಲ್ಲದೆ, ಅಂತರಂಗ ಶುದ್ಧಿ ಅಸಾಧ್ಯ.

**(೮) ಸ್ಥೈರ್ಯಮ್ :** ಮನಸ್ಸಿನ ಸ್ಥಿರತೆ(Conviction) ಸ್ಥೈರ್ಯ. ನಮಗೆ ನಮ್ಮದೇ ಆದ ಸ್ವಂತ ನಿರ್ಧಾರ ಬೇಕು. ಯಾರೋ ಹೇಳಿದಂತೆ ನಾವು ನಮ್ಮ ನಿರ್ಧಾರವನ್ನು ಬದಲಿಸಿಕೊಳ್ಳುತ್ತಾ ಗೊಂದಲಕ್ಕೊಳಗಾಗಬಾರದು. ನಾವು ನಮ್ಮ ತಲೆಯಲ್ಲಿ ಚಿಂತಿಸಬಲ್ಲವರಾಗಬೇಕು. ನಮಗೆ ಯಾವುದಾದರೂ ಪ್ರಶ್ನೆ ಬಂದರೆ ಅದಕ್ಕೆ ಉತ್ತರವನ್ನು ಕಂಡುಕೊಳ್ಳುವ ಸಾಮರ್ಥ್ಯ ನಮ್ಮ ತಲೆಯಲ್ಲೇ ಇರುತ್ತದೆ. "ಎಲ್ಲಿ ಪ್ರಶ್ನೆ ಇದೆಯೋ ಅಲ್ಲೇ ಉತ್ತರವೂ ಇರುತ್ತದೆ". ಶಾಸ್ತ್ರವನ್ನು ಚೆನ್ನಾಗಿ ಅಧ್ಯಾಯನ ಮಾಡಿ ನೀನೇ ನಿನ್ನ ಸಮಸ್ಯೆಗೆ ಉತ್ತರ ಕಂಡುಕೊಂಡು ದೃಢವಾಗಿ ಕೆಲಸ ಮಾಡು. ಯಾರ ಯಾರೋ ಮಾತನ್ನು ಕೇಳಿ ಗೊಂದಲಗೊಳ್ಳದೆ ಸ್ಥೈರ್ಯವನ್ನು ಸಾಧಿಸು.

**(೯) ಆತ್ಮವಿನಿಗ್ರಹಃ :** ಇಂದ್ರಿಯ ನಿಯಂತ್ರಣ(Self Control). ನಮ್ಮ ಇಂದ್ರಿಯ ನಮ್ಮ ಹಿಡಿತದಲ್ಲಿರಬೇಕು. ಇಂದ್ರಿಯ ಹಿಡಿತಲ್ಲಿರಬೇಕಾದರೆ ನಾವು ನಮ್ಮ ಮನಸ್ಸನ್ನು ಹಿಡಿತದಲ್ಲಿಟ್ಟುಕೊಳ್ಳಬೇಕು. ಮನಸ್ಸಿನ ಕೈಯಲ್ಲಿ ನೀನು ಮಂಗನಾಗಬೇಡ, ಮನಸ್ಸನ್ನು ನೀನು ನಿಯಂತ್ರಿಸು. ಇದಕ್ಕಾಗಿ ನಿನ್ನ ಮನಸ್ಸನ್ನು ದೇವರಲ್ಲಿ ನೆಲೆ ನಿಲ್ಲಿಸು. ಹೀಗೆ ಮನೋನಿಗ್ರಹದಿಂದ ಇಂದ್ರಿಯ ನಿಗ್ರಹ ಸಾಧಿಸು.

ಇಂದ್ರಿಯಾರ್ಥೇಷು ವೈರಾಗ್ಯಮನಹಂಕಾರ ಏವ ಚ ।
ಜನ್ಮಮೃತ್ಯುಜರಾವ್ಯಾಧಿದುಃಖದೋಷಾನುದರ್ಶನಮ್ ॥೮॥

ಇಂದ್ರಿಯ ಅರ್ಥೇಷು ವೈರಾಗ್ಯಮ್ ಅನಹಂಕಾರಃ ಏವ ಚ ।
ಜನ್ಮ ಮೃತ್ಯು ಜರಾ ವ್ಯಾಧಿ ದುಃಖ ದೋಷ ಅನುದರ್ಶನಮ್ -- ಇಂದ್ರಿಯ ವಿಷಯಗಳಲ್ಲಿ ಮೈಮರೆಯದಿರುವುದು, ಸೊಕ್ಕು ಇರದಿರುವುದು, ಹುಟ್ಟು-ಸಾವು-ಮುಪ್ಪು-ಬೇನೆಗಳಿಂದ ದುಗುಡತುಂಬಿದ ಬಾಳಿನ ದೋಷಗಳ ಎಚ್ಚರ,-

(೧೦) ಇಂದ್ರಿಯಾರ್ಥೇಷು ವೈರಾಗ್ಯ : ಇಂದ್ರಿಯಗಳನ್ನು ಹೊರಪ್ರಪಂಚದತ್ತ ಹರಿಯದಂತೆ ತಡೆದು ಮನಸ್ಸನ್ನು ಭಗವಂತನಲ್ಲಿ ನೆಲೆ ನಿಲ್ಲಿಸುವುದು. ಇದನ್ನು ಶಮ-ಧಮ ಎನ್ನುತ್ತಾರೆ. ಇಂದ್ರಿಯಗಳು ಲೌಕಿಕ ವಿಚಾರದತ್ತ ಹರಿಯದಂತೆ ಮಾಡುವುದು ಧಮ ಮತ್ತು ಅದನ್ನು ಭಗವಂತನತ್ತ ಹರಿಯುವಂತೆ ಮಾಡುವುದು ಶಮ. ಭಗವಂತನ ಬಗ್ಗೆ ತಿಳಿದಾಗ ಇಂದ್ರಿಯ ಇನ್ಯಾವುದರ ಕಡೆಗೂ ಹರಿಯುವುದಿಲ್ಲ. ಪ್ರಾಪಂಚಿಕವಾದ ಶಬ್ದ, ಸ್ಪರ್ಶ, ರೂಪ, ರಸ, ಗಂಧದ ಬಗ್ಗೆ ವಿರಕ್ತಿ ತಾಳು. ಉದಾಹರಣೆಗೆ ನಾಲಿಗೆ ಚಪಲ. ನಮ್ಮಲ್ಲಿ ಕೆಲವರು ಮನೆಯಲ್ಲಿ ಯಾವ ರೀತಿ ಅಡಿಗೆ ಮಾಡಿದರೂ ಅಲ್ಲಿ ಅದು ಸರಿಯಾಗಿಲ್ಲ, ಇದು ಸರಿಯಾಗಿಲ್ಲ ಇತ್ಯಾದಿಯಾಗಿ ತಗಾದೆ ಎತ್ತುತ್ತಾರೆ. ಈ ರೀತಿಯ ಚಪಲವನ್ನು ಬಿಟ್ಟುಬಿಡು. ಇಲ್ಲಿ ಬೇಕು ಬೇಡಗಳ ಆಯ್ಕೆ ಇಲ್ಲದೆ ಏನನ್ನು ಹಾಕಿದರೂ ಭಗವಂತನ ಪ್ರಸಾದ ಎಂದು ಸ್ವೀಕರಿಸುವುದನ್ನು ಕಲಿ. ಈ ರೀತಿ ಶಮ-ಧಮ ಸಾಧಿಸು.

(೧೧) ಅನಹಂಕಾರ: ಇದು ಎಲ್ಲಾ ಗುಣಗಳಿಗಿಂತ ಶ್ರೇಷ್ಠ ಗುಣ. ನಮ್ಮಲ್ಲಿ ಯಾವ ಗುಣವಿದ್ದರೂ ಅದು ನಮ್ಮ ಅಹಂಕಾರದ ಮುಂದೆ ವ್ಯರ್ಥ. ಅಹಂಕಾರ(**Ego**) ನಮ್ಮಲ್ಲಿನ ಎಲ್ಲಾ ಗುಣವನ್ನು ನಾಶ ಮಾಡುತ್ತದೆ. ಅಹಂಕಾರವಿದ್ದೆಡೆ ಉಳಿದ ಗುಣಗಳಿಗೆ ಅಸ್ತಿತ್ವವೇ ಇಲ್ಲ. ಆದ್ದರಿಂದ ಕೃಷ್ಣ ಅದನ್ನು ಇಲ್ಲಿ "ಏವ-ಚ" ಎಂದು ಒತ್ತಿ ಹೇಳಿದ್ದಾನೆ. 'ನಾನು ವಿದ್ವಾಂಸ, ನಾನು ಅನುಷ್ಠಾನವಂತ, ನಾನು ಮಡಿ' ಹೀಗೆ ನಮ್ಮನ್ನು ಅಹಂಕಾರ ಪ್ರತಿಯೊಂದು ವಿಚಾರದಲ್ಲೂ ಕಾಡುತ್ತದೆ. ಹೀಗೆ ನಾವು ಅಹಂಕಾರಪಟ್ಟರೆ ನಮ್ಮ ಅನುಷ್ಠಾನ-ಅನುಷ್ಠಾನವೇ ಆಗುವುದಿಲ್ಲ. ಎಲ್ಲಿ ಅಹಂಕಾರ ಕಾಡಿತೋ ಅಲ್ಲಿ ಸಾಧನೆ ವ್ಯರ್ಥವಾಗುತ್ತದೆ. ಎಲ್ಲಿ ಅಹಂಕಾರವಿರುತ್ತದೆ ಅಲ್ಲಿ ದೇವರಿರುವುದಿಲ್ಲ-ಅಂದರೆ ಅಹಂಕಾರದಿಂದಾಗಿ ನಾವು ದೇವರಿಂದ ದೂರ ಸರಿಯುತ್ತೇವೆ. ಈ ಕಾರಣದಿಂದ 'ನಾನು ಮಾಡಿದೆ, ನನ್ನಿಂದಾಯ್ತು' ಎಂದು ಬೀಗುವುದನ್ನು ಬಿಡು. ಭಗವಂತ ನನ್ನ ಕೈಯಿಂದ ಮಾಡಿಸಿದ ಎಂದು ಆತನಿಗೆ ಕೃತಜ್ಞತೆಯನ್ನು ತೋರು.

(೧೨) ಜನ್ಮ ಮೃತ್ಯು ಜರಾ ವ್ಯಾಧಿ ದುಃಖ ದೋಷ ಅನುದರ್ಶನಮ್: ಜೀವನವನ್ನು ಒಳನೋಟದಿಂದ ನೋಡು. ಈ ಜೀವನ ಎನ್ನುವುದು ಹುಟ್ಟು ಸಾವು ಎನ್ನುವ ಎರಡು ದಡದ ನಡುವೆ ಹರಿಯುವ ಒಂದು ಪ್ರವಾಹ. ಈ ಪ್ರವಾಹದಲ್ಲಿ ವ್ಯಾಧಿ, ಮುಪ್ಪು, ದುಃಖ, ಶೋಕ ಎನ್ನುವ ಅಲೆಗಳ ಸರಮಾಲೆ. ಈ ನಮ್ಮ ಬದುಕಿನ ಉದ್ದೇಶವೇನು, ಭಗವಂತ ನಮ್ಮನ್ನು ಏಕೆ ಹುಟ್ಟಿಸಿದ, ಮಾನವ ಜನ್ಮವನ್ನು ಹೇಗೆ ಸಾರ್ಥಕ ಮಾಡಿಕೊಳ್ಳಬೇಕು ಎನ್ನುವ ಅನುದರ್ಶನ ಮಾಡು. ಆಹಾರ ನಿದ್ರಾ ಭಯ ಮೈಥುನ ಇಷ್ಟೇ ಜೀವನವಲ್ಲ. ಇದನ್ನು ಪ್ರಾಣಿಗಳೂ ಅನುಭವಿಸುತ್ತವೆ. ಆದ್ದರಿಂದ ಶಾಸ್ತ್ರವನ್ನು ಓದಿ ಸತ್ಯಕ್ಕೆ ಅನುಗುಣವಾದ ಯಥಾರ್ಥ ದರ್ಶನವನ್ನು ಮಾಡಿಕೋ. ಕೇವಲ ಲೌಕಿಕ ಸುಖದ ನಿರೀಕ್ಷೆಯಲ್ಲಿ ಬದುಕುವುದನ್ನು ಬಿಟ್ಟು-ಸತ್ಯದ ಸಾಕ್ಷಾತ್ಕಾರಕ್ಕಾಗಿ, ಭಗವಂತನನ್ನು ಸೇರುವುದಕ್ಕಾಗಿ ಬದುಕು. ಎಲ್ಲಾ ಲೌಕಿಕ ಸುಖ, ಸಂಪತ್ತು ನಿಸ್ಸಾರ. ಇದರಿಂದಾಚೆಗಿನ ಸಾರವಾದ ಭಗವಂತನನ್ನು ತಿಳಿದು ಅದರತ್ತ ಹೆಜ್ಜೆಹಾಕು.

ಅಸಕ್ತಿರನಭಿಷ್ವಂಗಃ ಪುತ್ರದಾರಗೃಹಾದಿಷು ।
ನಿತ್ಯಂ ಚ ಸಮಚಿತ್ತತ್ವಮಿಷ್ಟಾನಿಷ್ಟೋಪಪತ್ತಿಷು ॥೯॥

ಮಯಿ ಚಾನನ್ಯಯೋಗೇನ ಭಕ್ತಿರವ್ಯಭಿಚಾರಿಣೀ ।
ವಿವಿಕ್ತದೇಶಸೇವಿತ್ವಮರತಿರ್ಜನಸಂಸದಿ ॥೧೦॥

ಅಧ್ಯಾತ್ಮಜ್ಞಾನನಿತ್ಯತ್ವಂ ತತ್ತ್ವಜ್ಞಾನಾರ್ಥದರ್ಶನಮ್ ।
ಏತಜ್ ಜ್ಞಾನಮಿತಿ ಪ್ರೋಕ್ತಮಜ್ಞಾನಂ ಯದತೋಽನ್ಯಥಾ ॥೧೧॥

ಅಸಕ್ತಿಃ ಅನಭಿಷ್ವಂಗಃ ಪುತ್ರ ದಾರ ಗೃಹ ಆದಿಷು ।
ನಿತ್ಯಮ್ ಚ ಸಮಚಿತ್ತತ್ವಮ್ ಇಷ್ಟ ಅನಿಷ್ಟ ಉಪಪತ್ತಿಷು ॥
ಮಯಿ ಚ ಅನನ್ಯಯೋಗೇನ ಭಕ್ತಿಃ ಅವ್ಯಭಿಚಾರಿಣೀ ।
ವಿವಿಕ್ತ ದೇಶ ಸೇವಿತ್ವಮ್ ಅರತಿಃ ಜನ ಸಂಸದಿ॥
ಅಧ್ಯಾತ್ಮ ಜ್ಞಾನ ನಿತ್ಯತ್ವಮ್ ತತ್ತ್ವ ಜ್ಞಾನ ಅರ್ಥ ದರ್ಶನಮ್ ।
ಏತತ್ ಜ್ಞಾನಮ್ ಇತಿ ಪ್ರೋಕ್ತಮ್ ಅಜ್ಞಾನಮ್ ಯತ್ ಅತಃ ಅನ್ಯಥಾ -- ಅಂಟಿಸಿಕೊಳ್ಳದಿರುವುದು, ಮಕ್ಕಳು ಮಡದಿ ಮನೆ ಮುಂತಾದುವನ್ನು ಅತಿಯಾಗಿ ಹಚ್ಚಿಕೊಳ್ಳದಿರುವುದು, ಇಷ್ಟ-ಅನಿಷ್ಟಗಳು ಬಂದೊದಗಿದಾಗ ಎಂದೆಂದೂ ಬಗೆಗೆಡಡಿರುವುದು, ಬೇರೆಡೆ ಕದಲದೆ ನನ್ನಲ್ಲೇ ಅಚಲವಾದ ಭಕ್ತಿ, ಏಕಾಂತವಾಸ, ಜನಜಂಗುಳಿಯಲ್ಲಿ ಬೆರೆಯದಿರುವುದು, ಅಧ್ಯಾತ್ಮದ ಅರಿವಿನಲ್ಲೇ ನಿರಂತರ ಸ್ಥಿತಿ, ಅಪರೋಕ್ಷ ಜ್ಞಾನಕ್ಕಾಗಿ ಶಾಸ್ತ್ರದ ಅಧ್ಯಯನ,[ತತ್ತ್ವಜ್ಞಾನಕ್ಕೆ ಗೋಚರನಾದ ಭಗವಂತನ ಸಾಕ್ಷಾತ್ಕಾರ] ಇವೇ ಜ್ಞಾನ ಮತ್ತು ಜ್ಞಾನ ಸಾಧನಗಳು. ಅದಕ್ಕಿಂತ ಬೇರೆಯಾದದ್ದು ಅಜ್ಞಾನ ಮತ್ತು ಅಜ್ಞಾನದ ದಾರಿ.

**(೧೩) ಅಸಕ್ತಿಃ :** 'ಸಕ್ತಿ' ಎಂದರೆ ಹಚ್ಚಿಕೊಳ್ಳುವುದು ಅಥವಾ ಅಂಟಿಸಿಕೊಳ್ಳುವುದು(Attachment). ಈ ವಿಚಾರವಾಗಿ ನಾವು ಹಿಂದೆ ಅನೇಕ ಬಾರಿ ಚರ್ಚಿಸಿದ್ದೇವೆ. ನಮ್ಮೆಲ್ಲಾ ದುಃಖಕ್ಕೂ ಮೂಲಕಾರಣ 'ಸಕ್ತಿ'. ಆದ್ದರಿಂದ ಯಾವುದನ್ನೂ ಅಂಟಿಸಿಕೊಳ್ಳಬೇಡ. ಹುಟ್ಟುವಾಗ ನಾವು ಏನನ್ನೂ ತಂದಿಲ್ಲ, ಸಾಯುವಾಗ ಯಾವುದನ್ನೂ ತೆಗೆದುಕೊಂಡು ಹೋಗುವುದಿಲ್ಲ. ಆದ್ದರಿಂದ ಲೌಕಿಕವಾದ ಈ ಸಕ್ತಿಯಿಂದ ದೂರ ನಿಲ್ಲು. ಬಂದದ್ದನ್ನು ಭಗವಂತನ ಪ್ರಸಾದವೆಂದು ಸ್ವೀಕರಿಸು, ಹೋದಾಗ ಭಗವಂತನ ಇಚ್ಛೆ ಎಂದು ಸಂತೋಷದಿಂದಿರು.

**(೧೪) ಅನಭಿಷ್ವಂಗಃ ಪುತ್ರ ದಾರ ಗೃಹ ಆದಿಷು :** ಅಭಿಷ್ವಂಗ ಎಂದರೆ ಅತಿಯಾಗಿ ಹಚ್ಚಿಕೊಳ್ಳುವುದು(Over attachment). ಮನೆ, ಹೆಂಡತಿ(ಗಂಡ/ಹೆಂಡತಿ) ಮಕ್ಕಳು ಇತ್ಯಾದಿಯನ್ನು ಅತಿಯಾಗಿ ಹಚ್ಚಿಕೊಳ್ಳಬೇಡ ಎನ್ನುತ್ತಾನೆ ಕೃಷ್ಣ. ಇಲ್ಲಿ ಮನೆ ಸಂಸಾರವನ್ನು ಹಚ್ಚಿಕೊಳ್ಳದೇ ಇರುವುದು ಎಂದರೆ ಎಲ್ಲವನ್ನೂ ತೊರೆದು ಕಾಡಿಗೆ ಹೋಗುವುದಲ್ಲ. 'ಇದನ್ನು ಬಿಟ್ಟು ನಾನು ಇರಲಾರೆ' ಎನ್ನುವ ಅಭಿಷ್ವಂಗ ಬಿಟ್ಟುಬಿಡುವುದು ಅಷ್ಟೆ. ಜೀವನದಲ್ಲಿ ಏನು ಬರುತ್ತದೋ ಅದನ್ನು ಸಾಕ್ಷೀಭೂತನಾಗಿ ನೋಡು. ಜೀವನವೇ ಒಂದು ನಾಟಕ, ಅದರಲ್ಲಿ ನೀನೇ

ಪಾತ್ರಧಾರಿ , ನೀನೇ ಪ್ರೇಕ್ಷಕ. ಭಗವಂತ ನಿರ್ದೇಶಕ. ಇಲ್ಲಿ ನನ್ನ ಮಕ್ಕಳೇ ನನ್ನ ಬದುಕು, ನನ್ನ ಪತಿ/ಪತ್ನಿ ನನ್ನ ಬದುಕು, ನನ್ನ ಸಂಪಾದನೆಯೇ ನನ್ನ ಬದುಕು, ಇದನ್ನು ಬಿಟ್ಟು ನನ್ನ ಅಸ್ತಿತ್ವವಿಲ್ಲ ಎನ್ನುವ ಅತಿಯಾದ ಅಭಿಷ್ವಂಗ ಬೇಡ. ಪ್ರೀತಿಸು-ಆದರೆ ಹಚ್ಚಿಕೊಂಡು ಕೊರಗಬೇಡ, ನಿರಾಶನಾಗಬೇಡ. ಈ ರೀತಿ ಬದುಕಲು ಕಲಿತಾಗ ಜೀವನ ಸುಂದರವಾಗಿರುತ್ತದೆ. ನಮ್ಮಿಂದ ನಮ್ಮ ಮಕ್ಕಳು ದೂರವಾದರೆ, ಹೆಂಡತಿ/ಗಂಡ ದೂರವಾದರೆ, ನಾವು ನಮ್ಮ ಸಂಪತ್ತನ್ನು(ಮನೆ, ಆಸ್ತಿ ಇತ್ಯಾದಿ) ಕಳೆದುಕೊಂಡರೆ ದುಃಖ-ನಿರಾಶೆಯಾಗುವುದಿಲ್ಲ. ಈ ರೀತಿ ಬದುಕಿದಾಗ ಜೀವನದಲ್ಲಿ ಏನು ದುರಂತ ಬಂದರೂ ಅದು ನಮ್ಮ ಪಾಲಿನ ಪಾತ್ರಾಭಿನಯ ಎನ್ನುವ ಭಾವನೆಯಿಂದ ನಾವು ಅದನ್ನು ಸ್ವೀಕರಿಸಲು ಸಾಧ್ಯವಾಗುತ್ತದೆ-ಆಘಾತವಾಗುವುದಿಲ್ಲ.

(೧೫) ನಿತ್ಯಮ್ ಚ ಸಮಚಿತ್ತತ್ವಮ್ ಇಷ್ಟ ಅನಿಷ್ಟ ಉಪಪತ್ತಿಷು : ಜೀವನದಲ್ಲಿ ಇಷ್ಟವಾದ ಘಟನೆ ನಡೆಯಬಹುದು, ಅನಿಷ್ಟವಾದ ಘಟನೆ ನಡೆಯಬಹುದು. ಇಷ್ಟ ಅನಿಷ್ಟಗಳು ಬಂದೊದಗಿದಾಗ ಮನಸ್ಸಿನ ಸಮತೋಲನವನ್ನು ಕಳೆದುಕೊಳ್ಳದೆ ಎಲ್ಲಾ ಸಮಯದಲ್ಲೂ ಸಮಚಿತ್ತತ್ವದಿಂದಿರಲು ಕಲಿ. ನಾವು ಅನಿಷ್ಟ ಅಂದುಕೊಂಡಿದ್ದು ಅನಿಷ್ಟವಾಗಿರಬೇಕೆಂದಿಲ್ಲ ಅಥವಾ ನಾವು ಇಷ್ಟಪಟ್ಟದ್ದು ಒಳ್ಳೆಯದಾಗಿರಬೇಕೆಂದಿಲ್ಲ. ಆದ್ದರಿಂದ ಇಷ್ಟ-ಅನಿಷ್ಟ ಎಂದು ಲೇಪ ಹಚ್ಚದೆ ಬಂದಿದ್ದನ್ನು 'ನಾಹಂ ಕರ್ತಾ ಹರಿಃ ಕರ್ತಾ' ಎಂದು ಸ್ವೀಕರಿಸಲು ಕಲಿ. ನಮ್ಮ ಜೀವನದಲ್ಲಿ ನಡೆಯುವ ಪ್ರತಿಯೊಂದು ಘಟನೆ ಭಗವಂತ ನಮ್ಮ ತರಬೇತಿಗಾಗಿ ಸೃಷ್ಟಿಸಿರುವ ಪ್ರಾಯೋಗಿಕ(Practical)ಶಿಕ್ಷಣ. ಭಗವಂತ ನಮಗೆ ದುಃಖವನ್ನು ಕೊಟ್ಟು ನಮ್ಮನ್ನು ಜಾಣರನ್ನಾಗಿ ಮಾಡುತ್ತಾನೆ ಎನ್ನುವ ಸತ್ಯವನ್ನು ಅರಿತು ಬದುಕು.

(೧೬) ಮಯಿ ಚ ಅನನ್ಯಯೋಗೇನ ಭಕ್ತಿಃ ಅವ್ಯಭಿಚಾರಿಣೀ: ಭಗವಂತನಲ್ಲಿ ನಿರಂತರ ಪರಿಶುದ್ಧ ಭಕ್ತಿ ಇರಲಿ. ಭಗವಂತ ಒಬ್ಬನೆ, ಆತನ ನಾಮ ಹಲವು. ಆತನಲ್ಲಿ ಅನನ್ಯವಾದ ಭಕ್ತಿಯನ್ನಿಡು. ಇಲ್ಲಿ ಏಕಭಕ್ತಿ ಬಹಳ ಮುಖ್ಯ. ಒಂದೊಂದು ದಿನ ಒಂದೊಂದು ದೇವರನ್ನು ಪೂಜಿಸುವುದು, ಒಂದು ದೇವತೆಯನ್ನು ಪೂಜಿಸಿದಾಗ ಇನ್ನೊಂದು ದೇವತೆ ಕೋಪಗೊಳ್ಳಬಹುದು ಎನ್ನುವ ಭಯದಿಂದ ಅನೇಕ ದೇವತಾ ಆರಾಧನೆ ಮಾಡುವುದನ್ನು ಮಾಡಿದರೆ ಅದು ವ್ಯಭಿಚಾರವಾಗುತ್ತದೆ. ಆದ್ದರಿಂದ ಕೃಷ್ಣ ಇಲ್ಲಿ "ನಿನ್ನ ಭಕ್ತಿ ಅನನ್ಯವಾಗಿದ್ದು ಅವ್ಯಭಿಚಾರಿಣಿಯಾಗಿರಬೇಕು" ಎಂದು ಒತ್ತಿ ಹೇಳಿದ್ದಾನೆ. ಭಗವಂತ ಸರ್ವಸಮರ್ಥ, ಸರ್ವಶಕ್ತ, ಜಗತ್ಜನ್ಮಾದಿ ಕಾರಣ ಎನ್ನುವ ನಿಷ್ಠೆ ನಿನ್ನಲ್ಲಿರಲಿ. ದೇವರ ಮೇಲೆ ನಂಬಿಕೆ ಇಲ್ಲದೆ ಯಾವ ಶಾಸ್ತ್ರ ಓದಿ ಏನೂ ಉಪಯೋಗವಿಲ್ಲ. ಭಗವಂತನ ಮೇಲಿನ ಪೂರ್ಣ ನಂಬಿಕೆಯಿಂದ ಮಾತ್ರ ಜ್ಞಾನ ಸಾಧನೆ ಸಾಧ್ಯ

(೧೭) ವಿವಿಕ್ತ ದೇಶ ಸೇವಿತ್ವಮ್: ಸಾಧ್ಯವಾದಷ್ಟು ಅತಿ ಹೆಚ್ಚು ಸಾತ್ವಿಕ ಕಂಪನವಿರುವ ಕಡೆ, ಸಾತ್ವಿಕ ಜನರ ಜೊತೆಗೆ ವಾಸ ಮಾಡಲು ಪ್ರಯತ್ನಿಸು. ಪೂರ್ಣಪ್ರಮಾಣದಲ್ಲಿ ಅಖಂಡವಾದ ಸಾತ್ವಿಕ ಕಂಪನವಿರುವ ಸ್ಥಳ ಪುಣ್ಯಕ್ಷೇತ್ರವೆನಿಸುತ್ತದೆ. ಅಂತಹ ಸ್ಥಳದಲ್ಲಿ ಒಳ್ಳೆಯದನ್ನು ಮಾತನಾಡುವ, ಒಳ್ಳೆಯ ಚಿಂತನೆ ಮಾಡುವ ಸಜ್ಜನರೊಂದಿಗೆ ವಾಸಮಾಡು. ಇದು ಸಾಧ್ಯವಾಗದೇ ಇದ್ದಲ್ಲಿ ಆದಷ್ಟು ಏಕಾಂತವಾಸವನ್ನು ಅಭ್ಯಾಸ ಮಾಡು. ನಾಲ್ಕು ಜನರೊಂದಿಗೆ ಸೇರಿ ಹಾಳು ಹರಟೆಯಲ್ಲಿ ನಿನ್ನ ಅಮೂಲ್ಯವಾದ ಜನ್ಮವನ್ನು ವ್ಯರ್ಥ ಮಾಡಿಕೊಳ್ಳಬೇಡ.

(೧೮) ಅರತಿಃ ಜನ ಸಂಸದಿ: ಎಲ್ಲಿ ಬೇಡವಾದ ವಿಚಾರಕ್ಕಾಗಿ ಜನಜಂಗುಳಿ ಸೇರುತ್ತದೋ, ಅಂತಹ ಜನಜಂಗುಳಿಯಿಂದ ದೂರವಿರು.

(೧೯) ಅಧ್ಯಾತ್ಮ ಜ್ಞಾನ ನಿತ್ಯತ್ವಮ್ : ಅಧ್ಯಾತ್ಮದ ಅರಿವಿನಲ್ಲಿ ನಿರಂತರವಾಗಿರು. ಮೊದಲು ಪಿಂಡಾಂಡ-ಬ್ರಹ್ಮಾಂಡವನ್ನು ತಿಳಿ, ಆನಂತರ ಇದನ್ನು ತಿಳಿಯುವ ಅಪೂರ್ವ ಮನಸ್ಸಿನ ವಿಸ್ಮಯದ ಬಗ್ಗೆ ತಿಳಿ, ನಂತರ 'ನಾನು' ಎಂದರೆ ಏನು(Awareness of self) ಎನ್ನುವುದನ್ನು ತಿಳಿ. ಇದು ತಿಳಿದಮೇಲೆ ಈ ಆತ್ಮವನ್ನು ನಿಯಂತ್ರಿಸುವ ಪರಮಾತ್ಮನನ್ನು ತಿಳಿ. ಇದು ಅಧ್ಯಾತ್ಮಜ್ಞಾನ. ನಿನ್ನ ಅಧ್ಯಯನದ ಗುರಿ ಅಧ್ಯಾತ್ಮ ಜ್ಞಾನವಾಗಿರಲಿ.

(೨೦) ತತ್ತ್ವಜ್ಞಾನ ಅರ್ಥ ದರ್ಶನಮ್: ಜಗತ್ತಿನ ಮೂಲಭೂತ ಸತ್ಯ ತಿಳಿಯುವುದಕ್ಕೆ ನಿನ್ನ ಅಧ್ಯಯನ ಮೀಸಲಿರಲಿ. ಮೇಲಿನ ಎಲ್ಲಾ ಗುಣಗಳಿಂದ ಎಲ್ಲಾ ಶಾಸ್ತ್ರಗಳಿಗೆ ವಿಷಯಭೂತನಾದ, ಎಲ್ಲಾ ಶಾಸ್ತ್ರಗಳಿಂದ ಪ್ರತಿಪಾಧ್ಯನಾದ ಭಗವಂತನ ಸಾಕ್ಷಾತ್ಕಾರ ಪಡೆ.

ಇಲ್ಲಿ ಹೇಳಿರುವ ಗುಣಗಳೇ ಜ್ಞಾನ ಮತ್ತು ಜ್ಞಾನ ಸಾಧನಗಳು. ಇದಕ್ಕಿಂತ ಬೇರೆಯಾಗಿರುವುದು ಅಜ್ಞಾನ ಮತ್ತು ಅಜ್ಞಾನದ ಗುರಿ.

ಜ್ಞಾನ ಸಾಧನಗಳನ್ನು ವಿವರಿಸಿದ ಕೃಷ್ಣ ಮುಂದಿನ ಆರು ಶ್ಲೋಕಗಳಲ್ಲಿ ಶಬ್ದದ ಮಿತಿಯಿಂದ ಆಚೆಗಿರುವ ಭಗವಂತನ ವರ್ಣನೆಯನ್ನು ನಮ್ಮ ಮುಂದಿಡುತ್ತಾನೆ. ದೇವರು ಹೇಗಿದ್ದಾನೆ, ಆತನ ರೂಪವನ್ನು ಹೇಗೆ ಅನುಸಂಧಾನ ಮಾಡಬೇಕು ಎನ್ನುವ ವಿಚಾರವನ್ನು ಕೃಷ್ಣ ಇಲ್ಲಿ ಸುಂದರವಾಗಿ ವರ್ಣಿಸಿದ್ದಾನೆ. ಈ ಶ್ಲೋಕಗಳಲ್ಲಿ ಒಂದೊಕ್ಕೊಂದು ವ್ಯತಿರಿಕ್ತ(Contradicting)ವಾಗಿ ಕಾಣುವ ಅನೇಕ ವಿಷಯಗಳನ್ನು ನಾವು ಕಾಣಬಹುದು. ಉದಾಹರಣೆಗೆ: ಭಗವಂತ ನಿರ್ಗುಣ ಆದರೆ ಆತ ಸರ್ವಗುಣಪೂರ್ಣ; ಭಗವಂತ ಅಚಲ ಆದರೆ ಆತ ಚಲಿಸುತ್ತಾನೆ; ಭಗವಂತ ನಿರಾಕಾರ ಆದರೆ ಆತ ಸಾಕಾರ; ಭಗವಂತನನ್ನು ತಿಳಿಯಲು ಅಸಾಧ್ಯ ಆದರೆ ಆತನನ್ನು ತಿಳಿಯಬಹುದು; ಭಗವಂತನಿಗೆ ಇಂದ್ರಿಯಗಳಿಲ್ಲ ಆದರೆ ಆತನಿಗೆ ಇಂದ್ರಿಯಗಳಿವೆ; ಆತ ದೂರದಲ್ಲಿದ್ದಾನೆ ಆದರೆ ಹತ್ತಿರದಲ್ಲಿದ್ದಾನೆ; ಇತ್ಯಾದಿ. ಈ ರೀತಿಯ ವರ್ಣನೆಯನ್ನು ಭಗವಂತನಿಗಲ್ಲದೆ ಇನ್ಯಾರಿಗೂ ಕೊಡಲು ಬರುವುದಿಲ್ಲ. ಇವೆಲ್ಲವುದರ ವಿವರಣೆಯನ್ನು ಮುಂದಿನ ಶ್ಲೋಕಗಳಲ್ಲಿ ಕಾಣಬಹುದು.

ಜ್ಞೇಯಂ ಯತ್ ತತ್ ಪ್ರವಕ್ಷ್ಯಾಮಿ ಯಜ್ ಜ್ಞಾತ್ವಾSಮೃತಮಶ್ನುತೇ ।
ಅನಾದಿಮತ್ ಪರಂ ಬ್ರಹ್ಮ ನ ಸತ್ ತನ್ನಾಸದುಚ್ಯತೇ ॥೧೨॥

ಜ್ಞೇಯಮ್ ಯತ್ ತತ್ ಪ್ರವಕ್ಷ್ಯಾಮಿ ಯತ್ ಜ್ಞಾತ್ವಾ ಅಮೃತಮ್ ಅಶ್ನುತೇ ।
ಅನಾದಿ ಮತ್ಪರಮ್ ಬ್ರಹ್ಮ ನ ಸತ್ ತತ್ ನ ಅಸತ್ ಉಚ್ಯತೇ – ಯಾವುದನ್ನು ತಿಳಿದು ಸಾವನ್ನು ಗೆಲ್ಲುವನೋ ಅಂತಹ 'ಜ್ಞೇಯ'ವನ್ನು ಹೇಳುತ್ತೇನೆ: ಹುಟ್ಟಿರದ,[ದೇಹದಿಂದಲೂ ಹುಟ್ಟದ] ಪರಬ್ರಹ್ಮವೇ ಜ್ಞೇಯ. ಅದು ಕಣ್ಣಿಗೆ ಕಾಣುವ ಮಣ್ಣು-ನೀರು-ಬೆಂಕಿಗಿಂತಲೂ ಬೇರೆ; ಕಾಣದ ಗಾಳಿ –ಆಗಸಗಳಿಗಿಂತಲೂ ಬೇರೆ ಎನ್ನಿಸಿದೆ.

ಇಲ್ಲಿ ಕೃಷ್ಣ ಜ್ಞಾನ ಸಾಧನಗಳ ಮೂಲಕ ತಿಳಿದುಕೊಳ್ಳಬೇಕಾದ ಜ್ಞೇಯನ ಬಗ್ಗೆ ವಿವರಿಸುತ್ತಾ ಹೇಳುತ್ತಾನೆ: "ಯಾವುದನ್ನು ಪ್ರತ್ಯಕ್ಷವಾಗಿ ಶಬ್ದಗಳು ಹೇಳಲಾರವೋ, ಯಾವ ಜ್ಞಾನವನ್ನು ತಿಳಿದುಕೊಂಡು ನೀನು

ಅಮೃತತ್ವವನ್ನು ಸವಿಯುವೆಯೋ-ಅದನ್ನು ನಾನು ನಿನಗೆ ಹೇಳುತ್ತೇನೆ" ಎಂದು. ಭಗವಂತ ಅನಾದಿಮತ್. ಆತನಿಗೆ ನಶ್ವರವಾದ ಪಂಚಭೂತಗಳಿಂದಾದ ಯಾವ ಆಕಾರವೂ ಇಲ್ಲ. ಆತ ಜ್ಞಾನಾನಂದ ಸ್ವರೂಪ. ಭಗವಂತನ ಗುಣಕ್ರಿಯೆ ಎಲ್ಲವೂ ಅನಾದಿಮತ್. ಸದ್ಗುಣಗಳಿಂದ ತುಂಬಿರುವ ಭಗವಂತ ನಮಗೆ ಪೂರ್ಣತೆಯನ್ನು ಕೊಡುವವ. ಆತ ಸರ್ವರಕ್ಷಕ, ಆತನಿಂದ ಹಿರಿದಾದ ತತ್ವ ಇನ್ನೊಂದಿಲ್ಲ. ಇಂತಹ ಭಗವಂತನನ್ನು ನಾವು ಪೂರ್ಣವಾಗಿ ಅರಿಯಲು ಸಾಧ್ಯವಿಲ್ಲ. ಅದು ನಮ್ಮ ಅರಿವಿಗೆ ಎಟುಕದ್ದು. ಹೀಗಿದ್ದರೂ ಕೂಡಾ ಆತನನ್ನು ನಮ್ಮ ಸಾಮರ್ಥ್ಯಕ್ಕನುಗುಣವಾಗಿ ನಾವು ಯಥಾರ್ಥ ತಿಳಿಯಲು ಸಾಧ್ಯ.

ಸರ್ವತಃಪಾಣಿಪಾದಂ ತತ್ ಸರ್ವತೋಽಕ್ಷಿಶಿರೋಮುಖಮ್ ।
ಸರ್ವತಃಶ್ರುತಿಮಲ್ಲೋಕೇ ಸರ್ವಮಾವೃತ್ಯ ತಿಷ್ಠತಿ ॥೧೩॥

ಸರ್ವತಃಪಾಣಿಪಾದಮ್ ತತ್ ಸರ್ವತಃ ಅಕ್ಷಿ ಶಿರಃ ಮುಖಮ್ ।
ಸರ್ವತಃ ಶ್ರುತಿಮತ್ ಲೋಕೇ ಸರ್ವಮ್ ಆವೃತ್ಯ ತಿಷ್ಠತಿ—ಎಲ್ಲೆಡೆಯೂ ಅದಕ್ಕೆ ಕೈಕಾಲುಗಳು; ಎಲ್ಲೆಡೆಯೂ ಕಣ್ಣು-ತಲೆ-ಬಾಯಿಗಳು; ಎಲ್ಲೆಡೆಯೂ ಅದಕ್ಕೆ ಕಿವಿ; ಅದು ಲೋಕದೊಳಗೆಲ್ಲವನ್ನು ಆವರಿಸಿ ನಿಂತಿದೆ.

ಭಗವಂತ ಎಲ್ಲೆಡೆ ತುಂಬಿದ್ದಾನೆ. ಆತನಿಗೆ ಎಲ್ಲಾಕಡೆ ಕೈ ಕಾಲುಗಳು; ಎಲ್ಲಾ ಕಡೆ ಕಿವಿ, ಮುಖ, ಬಾಯಿ, ಕಣ್ಣು.(ಸಂಸ್ಕೃತದಲ್ಲಿ ಮುಖ ಎಂದರೆ ಮುಖವೂ ಹೌದು-ಬಾಯಿಯೂ ಹೌದು. ಸಮೃದ್ಧವಾದ ಈ ಭಾಷೆಯಲ್ಲಿ 'ಬಾಯಿ'ಯನ್ನು ಸೂಚಿಸುವ ಪ್ರತ್ಯೇಕ ಪದ ಇಲ್ಲ!). ಈ ಕಾರಣದಿಂದ ಭಗವಂತನಿಗೆ ತಿಳಿಯದಂತೆ ನಾವು ಯಾವ ಕಾರ್ಯವನ್ನೂ ಮಾಡಲು ಸಾಧ್ಯವಿಲ್ಲ. ಆತ ಸರ್ವಜ್ಞ, ಸರ್ವಗತ, ಸರ್ವಸಮರ್ಥ. ಇದೆಲ್ಲವನ್ನು ಶ್ರುತಿ ಪ್ರಮಾಣೀಕರಿಸುತ್ತದೆ. ಆದಿಯಲ್ಲಿ ವೇದವನ್ನು ಉದ್ಧಾರ ಮಾಡಿದವನು ಭಗವಂತ. ಆತ ಎಲ್ಲವುದರ ಒಳಗೂ ಹೊರಗೂ ಆವರಿಸಿ ನಿಂತಿದ್ದಾನೆ. ಅಖಂಡವಾದ ಭಗವಂತನೊಳಗೆ ಆತನ ಅನಂತ ರೂಪಗಳಿವೆ. ಪ್ರತಿಯೊಂದು ರೂಪಕ್ಕೂ ಜ್ಞಾನಾನಂದಮಯವಾದ, ಸ್ವರೂಪಭೂತವಾದ ಇಂದ್ರಿಯಗಳಿವೆ. ನಮ್ಮ ಸರ್ವ ಇಂದ್ರಿಯದಲ್ಲೂ ಆತ ತುಂಬಿ ನಿಂತು ನಡೆಸುತ್ತಿದ್ದಾನೆ.

ಸರ್ವೇಂದ್ರಿಯಗುಣಾಭಾಸಂ ಸರ್ವೇಂದ್ರಿಯವಿವರ್ಜಿತಮ್ ।
ಅಸಕ್ತಂ ಸರ್ವಭೃಚ್ಚೈವ ನಿರ್ಗುಣಂ ಗುಣಭೋಕ್ತೃ ಚ ॥೧೪॥

ಸರ್ವೇಂದ್ರಿಯ ಗುಣ ಆಭಾಸಂ ಸರ್ವೇಂದ್ರಿಯ ವಿವರ್ಜಿತಮ್ ।
ಅಸಕ್ತಮ್ ಸರ್ವಭೃತ್ ಚ ಏವ ನಿರ್ಗುಣಮ್ ಗುಣಭೋಕ್ತೃ ಚ –ಎಲ್ಲಾ ಇಂದ್ರಿಯಗಳನ್ನು, ಎಲ್ಲಾ ವಿಷಯಗಳನ್ನು ಬೆಳಗಿಸುತ್ತಿರುವುದು; ಅದಕ್ಕೆ ಭೌತಿಕವಾದ ಯಾವ ಇಂದ್ರಿಯಗಳೂ ಇಲ್ಲ. ಯಾವುದಕ್ಕೂ ಅಂಟದೆ ಎಲ್ಲವನ್ನು ಹೊತ್ತಿದೆ. ತ್ರಿಗುಣಗಳ ನಂಟಿಲ್ಲ; ಎಲ್ಲಾ ಸದ್ಗುಣಗಳ ನೆಲೆ.

ಜಗತ್ತಿನಲ್ಲಿರುವ ಎಲ್ಲಾ ಜೀವಜಾತಗಳು ತಮ್ಮ ಇಂದ್ರಿಯಗಳಿಂದ ಇಂದ್ರಿಯ ವಿಷಯವನ್ನು ಗ್ರಹಿಸುವುದು ಭಗವಂತನಿಂದ. ಇಂತಹ ಭಗವಂತನಿಗೆ ಪಾಂಚಭೌತಿಕವಾದ, ನಶ್ವರವಾದ, ನಮ್ಮಂತೆ ಒಂದು ದಿನ

ನಾಶವಾಗುವ, ತನ್ನ ಸ್ವರೂಪಕ್ಕಿಂತ ಭಿನ್ನವಾದ ಯಾವ ಇಂದ್ರಿಯಗಳೂ ಇಲ್ಲ. ಈ ಜಗತ್ತನ್ನು ಹೊತ್ತಿರುವ ತಂದೆ ಆ ಭಗವಂತ ಗಂಡು. ಜಗತ್ತನ್ನು ಹೆತ್ತ ಆತ ತಾಯಿಯೂ ಹೌದು. ಭೌತಿಕವಾಗಿ ಆತ ಗಂಡೂ ಅಲ್ಲ, ಹೆಣ್ಣೂ ಅಲ್ಲ. ಆತ ಸ್ವರೂಪಭೂತವಾಗಿ ಗಂಡೂ ಹೌದು-ಹೆಣ್ಣೂ ಹೌದು. ಭಗವಂತ ಎಲ್ಲರೊಳಗೆ ತುಂಬಿದ್ದಾನೆ ಆದರೆ ಆತ ಯಾವುದನ್ನೂ ಅಂಟಿಸಿಕೊಂಡಿಲ್ಲ. ಆತ ಎಲ್ಲವನ್ನೂ ಹೊತ್ತಿದ್ದಾನೆ ಆದರೆ ಅದರ ಬಾಂಧವ್ಯದ ಬೆಸುಗೆ(Attachment) ಆತನಿಗಿಲ್ಲ. ಭಗವಂತ ತ್ರಿಗುಣಾತೀತ. ಆತನಿಗೆ ತ್ರಿಗುಣಗಳ ನಂಟಿಲ್ಲ. ಆದರೆ ಆತ ಸದ್ಗುಣಗಳ ನೆಲೆ. ಅವನು ನಿರಾಕಾರನೂ ಹೌದು, ಸಾಕಾರನೂ ಹೌದು.

ಬಹಿರಂತಶ್ಚ ಭೂತಾನಾಮಚರಂ ಚರಮೇವ ಚ ।
ಸೂಕ್ಷ್ಮತ್ವಾತ್ ತದವಿಜ್ಞೇಯಂ ದೂರಸ್ಥಂ ಚಾಂತಿಕೇ ಚ ತತ್ ॥೧೫॥

ಬಹಿಃ ಅಂತಃ ಚ ಭೂತಾನಾಮ್ ಆಚರಮ್ ಚರಮ್ ಏವ ಚ ।
ಸೂಕ್ಷ್ಮತ್ವಾತ್ ತತ್ ಅವಿಜ್ಞೇಯಮ್ ದೂರಸ್ಥಮ್ ಚ ಅಂತಿಕೇ ಚ ತತ್ –ಅದು ಜೀವಿಗಳ ಹೊರಗಿದೆ; ಒಳಗೂ ಇದೆ; ಆದರೂ ಎಲ್ಲೆಡೆ ಚಲಿಸುತ್ತಿದೆ. ಅದು ಅಣುವಿಗಿಂತ ಅಣು; ಅದಕ್ಕೆಂದೇ ತಿಳಿವಿಗೆಟುಕದ್ದು. ಅದು ದೂರದಲ್ಲಿದ್ದರೂ ಎಲ್ಲರ ಹತ್ತಿರದಲ್ಲಿದೆ.

ಭೂತ ಎಂದರೆ ಸಮಸ್ತ ಬ್ರಹ್ಮಾಂಡ, ಸಮಸ್ತ ಜೀವಜಾತ(ಪಿಂಡಾಂಡ). ಭಗವಂತ ಈ ಬ್ರಹ್ಮಾಂಡದ ಒಳಗೂ ಹೊರಗೂ ತುಂಬಿದ್ದಾನೆ. ನಾರಾಯಣ ಉಪನಿಷತ್ತಿನಲ್ಲಿ ಹೇಳುವಂತೆ "ಅಂತರ್ಬಹಿಶ್ಚ ತತ್-ಸರ್ವಂ ವ್ಯಾಪ್ಯ ನಾರಾಯಣಃ ಸ್ಥಿತಃ". ನಮ್ಮ ಒಳಗೆ ಮತ್ತು ಹೊರಗೆ ತುಂಬಿ, ಎಲ್ಲವನ್ನೂ ವ್ಯಾಪಿಸಿ ನಿಂತಿರುವ ಭಗವಂತ-ನಾರಾಯಣ. ಒಂದು ಅತಿಕ್ಷುದ್ರ ಜೀವದಿಂದ ಹಿಡಿದು ಚತುರ್ಮುಖ ಬ್ರಹ್ಮನ ತನಕ ಎಲ್ಲರ ಒಳಗೂ ಹೊರಗೂ ಭಗವಂತ ತುಂಬಿದ್ದಾನೆ. ನಮ್ಮ ಒಳಗೆ ಅಂತರ್ಯಾಮಿಯಾಗಿ ಬಿಂಬರೂಪದಲ್ಲಿದ್ದು ನಮ್ಮನ್ನು ನಡೆಸುತ್ತಿದ್ದಾನೆ ಮತ್ತು ನಮ್ಮ ಹೊರಗೆ ನಿಂತು ನಮ್ಮನ್ನು ಧಾರಣೆ ಮಾಡಿದ್ದಾನೆ. ಜ್ಞಾನಿಗಳಿಗೆ ಅವರ ಅಂತರಂಗದಲ್ಲಿ ದರ್ಶನ ಕೊಡುವ ಭಗವಂತ ಅಜ್ಞಾನಿಗಳಿಗೆ ಬಹಿ(ಬಹುದೂರ). ಸರ್ವಗತನಾದ ಭಗವಂತ ಅಚಲ ಆದರೆ ಆತನ ಅನಂತ ರೂಪಗಳು ಸದಾ ಚಲಿಸುತ್ತಿರುತ್ತವೆ. ಸಮಸ್ತ ಚರಾಚಾರಾತ್ಮಕ ಜೀವದೊಳಗೆ ಭಗವಂತ ತುಂಬಿ ನಿಂತಿದ್ದಾನೆ. ಭಗವಂತ ಅಣುವಿನೊಳಗೆ ಅಣುವಾಗಿ ತುಂಬಿದ್ದಾನೆ. ಭಗವಂತ ಜ್ಞೇಯ ಆದರೆ ವಿಜ್ಞೇಯ ಅಲ್ಲ. ಭಗವಂತನ ವಿವರವನ್ನು ನಾವು ಕಿಂಚಿತ್ ತಿಳಿಯಬಹುದು ಆದರೆ ಪೂರ್ಣವಾಗಿ ಅರಿಯಲು ಸಾಧ್ಯವಿಲ್ಲ. ನಾವು ಸಮುದ್ರದಲ್ಲಿರುವ ಒಂದು ಪುಟ್ಟ ಮೀನಿನಂತೆ. ಅದು ಹೇಗೆ ಸಮುದ್ರದ ಅಗಾಧತೆಯನ್ನು ತಿಳಿಯಲಾರದೋ ಹಾಗೆ ಜಗತ್ತಿನ ಯಾವ ಜೀವಜಾತವೂ ಭಗವಂತನನ್ನು ಪೂರ್ಣವಾಗಿ ತಿಳಿಯಲಾರವು. ಏಕೆಂದರೆ ಅದು ನಮ್ಮ ಮನಸ್ಸು ಗ್ರಹಿಸಲಾರದಷ್ಟು ಸೂಕ್ಷ್ಮ ಮತ್ತು ಅಗಾಧ.

ಅವಿಭಕ್ತಂ ಚ ಭೂತೇಷು ವಿಭಕ್ತಮಿವ ಚ ಸ್ಥಿತಮ್ ।
ಭೂತಭರ್ತೃ ಚ ತಜ್ ಜ್ಞೇಯಂ ಗ್ರಸಿಷ್ಣು ಪ್ರಭವಿಷ್ಣು ಚ ॥೧೬॥

ಅವಿಭಕ್ತಮ್ ಚ ಭೂತೇಷು ವಿಭಕ್ತಮ್ ಇವ ಚ ಸ್ಥಿತಮ್ ।
ಭೂತಭರ್ತೃ ಚ ತತ್ ಜ್ಞೇಯಮ್ ಗ್ರಸಿಷ್ಣು ಪ್ರಭವಿಷ್ಣು ಚ –ಎಲ್ಲಾ ಜೀವಿಗಳಲ್ಲು ಏಕರೂಪವಾಗಿದೆ; ಆದರೂ ಬೇರೆಯೋ ಎನ್ನುವಂತೆ ಬಹುರೂಪದಿಂದಿದೆ. ಎಲ್ಲಾ ಜೀವಿಗಳನ್ನು ಪಾಲಿಸುವಂತಾದ್ದು; ಕಬಳಿಸುವಂತಾದ್ದು ಮತ್ತು ಹುಟ್ಟಿಸುವಂತಾದ್ದು ಅದೇ ಎಂದು ತಿಳಿಯಬೇಕು.

ಭಗವಂತ ಈ ಪ್ರಪಂಚದಲ್ಲಿನ ಪ್ರತಿಯೊಂದು ಜೀವದಲ್ಲೂ ಬಿಂಬ ರೂಪನಾಗಿ ನೆಲೆಸಿದ್ದಾನೆ. ಒಂದೊಂದು ಜೀವದಲ್ಲೂ ಅನೇಕ ರೂಪದಲ್ಲಿ ಆತನಿದ್ದಾನೆ. ಇಲ್ಲಿ ಪ್ರತಿಯೊಂದು ಜೀವಗಳೂ ವಿಭಕ್ತಗಳು. ಆದರೆ ಭಗವಂತ ಮಾತ್ರ ಅಖಂಡ(ಅವಿಭಕ್ತ). ಎಲ್ಲಾ ಕಡೆ ಇರುವ ಭಗವಂತ ಒಬ್ಬನೆ ಆದರೆ ಬೇರೆ ಬೇರೆ ಇದ್ದಂತೆ ನಮಗೆ ಕಾಣಿಸುತ್ತಾನೆ ಅಷ್ಟೆ. ಇದಕ್ಕೆ ಉತ್ತಮ ಉದಾಹರಣೆ ಭಗವಂತನ ಅವತಾರವಾದ-ಪರಶುರಾಮ, ವೇದವ್ಯಾಸ ಮತ್ತು ಶ್ರೀಕೃಷ್ಣ. ಇಲ್ಲಿ ಭಗವಂತ ಮೂರು ರೂಪದಲ್ಲಿ ನಮಗೆ ಏಕ ಕಾಲದಲ್ಲಿ ಕಾಣಿಸಿಕೊಂಡ. ಒಂದೇ ಆದರೂ ಕೂಡಾ ಮೂರಾಗಿ ನಮಗೆ ಆತ ಕಾಣಿಸಿಕೊಂಡ. ಆತ ಸಮಸ್ತ ಜೀವದೊಳಗಿದ್ದಾನೆ ಆದರೆ ಸಮಸ್ತ ಜೀವವನ್ನೂ ಆತನೇ ಹೊತ್ತುಕೊಂಡಿದ್ದಾನೆ. ಎಲ್ಲರ ಸೃಷ್ಟಿಕರ್ತ ಭಗವಂತ ಹಾಗೂ ತನ್ನ ಸೃಷ್ಟಿಯನ್ನು ಒಂದು ದಿನ ಸಂಹಾರ ಮಾಡುವವನೂ ಆತನೇ. ಸಂಹಾರದ ನಂತರ ಸೃಷ್ಟಿಯ ಪುನರ್ನಿರ್ಮಾಣ ಮಾಡುವವನೂ ಅವನೇ.

ಜ್ಯೋತಿಷಾಮಪಿ ತಜ್ ಜ್ಯೋತಿಸ್ತಮಸಃ ಪರಮುಚ್ಯತೇ ।
ಜ್ಞಾನಂ ಜ್ಞೇಯಂ ಜ್ಞಾನಗಮ್ಯಂ ಹೃದಿ ಸರ್ವಸ್ಯ ವಿಷ್ಠಿತಮ್ ॥೧೭॥

ಜ್ಯೋತಿಷಾಮ್ ಅಪಿ ತತ್ ಜ್ಯೋತಿಃ ತಮಸಃ ಪರಮ್ ಉಚ್ಯತೇ ।
ಜ್ಞಾನಮ್ ಜ್ಞೇಯಮ್ ಜ್ಞಾನಗಮ್ಯಮ್ ಹೃದಿ ಸರ್ವಸ್ಯ ವಿಷ್ಠಿತಮ್ --ಅದು ಬೆಳಕುಗಳಿಗೆಲ್ಲ ಹಿರಿ ಬೆಳಕು. ಕತ್ತಲೆಯ ಆಚೆಗಿರುವಂತಾದ್ದು. ಅದು ತಿಳಿವಿನ ರೂಪ. ತನ್ನನು ತಾನೇ ತಿಳಿವಂತಾದ್ದು. ತಿಳಿವಿನಿಂದ ಪಡೆಯಬಹುದಾದಂತಾದ್ದು. ಎಲ್ಲರ ಹೃದಯದಲ್ಲೂ ನೆಲೆಸಿರುವಂತಾದ್ದು.

ಈವರೆಗೆ ಕೃಷ್ಣ ವಿವರಿಸಿದ ವಿಚಾರವನ್ನು ನಾವು ನಮ್ಮ ಧ್ಯಾನದಲ್ಲಿ ಕಾಣುವುದು ಕಷ್ಟ. ಅದಕ್ಕಾಗಿ ಕೃಷ್ಣ ಈ ಶ್ಲೋಕದಲ್ಲಿ ತನ್ನನ್ನು ಭಾವನಾತ್ಮಕವಾಗಿ ವಿವರಿಸುತ್ತಾನೆ. ಭಗವಂತ ಕತ್ತಲಿಲ್ಲದ ಬೆಳಕು. ಆ ಬೆಳಕಿಗೆ ಒಂದು ಅವಧಿ ಇಲ್ಲ. ಅದು ಅನಂತ. ಎಲ್ಲಾ ಬೆಳಕುಗಳಿಗೂ ಬೆಳಕು ಕೊಡುವ ಮಹಾಜ್ಯೋತಿ ಭಗವಂತ. ಭಗವಂತನನ್ನು ಧ್ಯಾನದಲ್ಲಿ ಕಾಣಬೇಕು ಎಂದು ಕಣ್ಣು ಮುಚ್ಚಿ ಕುಳಿತಾಗ ನಮಗೆ ನಮ್ಮ ಇಷ್ಟವಾದ ವಸ್ತು ಅಥವಾ ವ್ಯಕ್ತಿ ಕಾಣಬಹುದು. ಆಗ ಆ ವ್ಯಕ್ತಿಯೊಳಗೆ/ವಸ್ತುವಿನೊಳಗೆ ನಾವು ಭಗವಂತನನ್ನು ಕಾಣಲು ಪ್ರಯತ್ನಿಸಬೇಕು. (ಏಕೆಂದರೆ ಭಗವಂತ ಸರ್ವಾಂತರ್ಯಾಮಿ-ಆತ ಎಲ್ಲವುದರ ಒಳಗೂ ಹೊರಗೂ ತುಂಬಿ ನಿಂತಿದ್ದಾನೆ). ನಂತರ "ಸೂರ್ಯನಲ್ಲಿ ಭಗವಂತನಿದ್ದಾನೆ, ಸೌರಶಕ್ತಿ ಆತನ ಕೊಡುಗೆ" ಎಂದು ಅನುಸಂಧಾನ ಮಾಡಬೇಕು. ನಂತರ ಸೌರಮಂಡಲದ ಮಧ್ಯದಲ್ಲಿ ಭಗವಂತನ ಪಾದವನ್ನು ಕಾಣುವ ಪ್ರಯತ್ನ ಮಾಡಬೇಕು. ಆ ಪಾದದ ಬೆರಳಿನ

ತುದಿಯಿಂದ ಚಿಮ್ಮಿದ ಬೆಳಕು ನಮ್ಮ ಹೃದಯವನ್ನು ಪ್ರವೇಶಿಸಿ ಬೆಳಗುತ್ತಿರುವುದನ್ನು ಧ್ಯಾನದಲ್ಲಿ ನಾವು ಅನುಭವಿಸಬೇಕು. ಇದು ಧ್ಯಾನದಲ್ಲಿ ಹಂತ ಹಂತವಾಗಿ ನಾವು ಭಗವಂತನನ್ನು ಕಾಣುವ ಪ್ರಕ್ರಿಯೆ. ಭಗವಂತ ಈ ಜಗತ್ತಿನ ಎಲ್ಲಾ ಬೆಳಕುಗಳಿಗೂ ಬೆಳಕು ಕೊಟ್ಟವ. ನಮ್ಮ ಅಂತರಂಗವನ್ನು ಬೆಳಗಿಸುವ ಸಾಮರ್ಥ್ಯ ಇರುವುದು ಕೇವಲ ಭಗವಂತನಿಗೆ. ಭಗವಂತನೆಂಬ ಬೆಳಕು ಕತ್ತಲನ್ನು ಮೀರಿದ್ದು. ಅದು ಜ್ಞಾನಾನಂದಸ್ವರೂಪದ ಬೆಳಕು. ಭಗವಂತನನ್ನು ಪೂರ್ಣ ತಿಳಿದವನು ಭಗವಂತನೊಬ್ಬನೇ. ನಾವು ಯಥಾಶಕ್ತಿ ಆತನನ್ನು ತಿಳಿಯುವ ಪ್ರಯತ್ನವನ್ನು ಮಾಡಬೇಕು. ಭಗವಂತ ನಮ್ಮ ಹೃದಯದಲ್ಲೇ ನೆಲೆಸಿದ್ದಾನೆ. ಆತ ಎಲ್ಲಕ್ಕಿಂತ ವಿಲಕ್ಷಣನಾಗಿ ನಮ್ಮ ಹೃತ್ಕಮಲ ಮಧ್ಯದಲ್ಲಿ ಸೂಕ್ಷಕ್ಕಿಂತ ಸೂಕ್ಷ್ಮನಾಗಿ ನೆಲೆಸಿದ್ದಾನೆ. ಇಂತಹ ಭಗವಂತನನ್ನು ನಾವು ಭಕ್ತಿಪೂರ್ವಕ ಜ್ಞಾನದಿಂದ ಮಾತ್ರ ಅರಿಯಲು ಸಾಧ್ಯ.

ಇತಿ ಕ್ಷೇತ್ರಂ ತಥಾ ಜ್ಞಾನಂ ಜ್ಞೇಯಂ ಚೋಕ್ತಂ ಸಮಾಸತಃ ।
ಮದ್ಭಕ್ತ ಏತದ್ ವಿಜ್ಞಾಯ ಮದ್ ಭಾವಾಯೋಪಪದ್ಯತೇ ॥೧೮॥

ಇತಿ ಕ್ಷೇತ್ರಮ್ ತಥಾ ಜ್ಞಾನಮ್ ಜ್ಞೇಯಮ್ ಚ ಉಕ್ತಮ್ ಸಮಾಸತಃ ।
ಮತ್ ಭಕ್ತಃ ಏತತ್ ವಿಜ್ಞಾಯ ಮತ್ ಭಾವಾಯ ಉಪದ್ಯತೇ –ಹೀಗೆ 'ಕ್ಷೇತ್ರ'-'ಜ್ಞಾನ' ಮತ್ತು 'ಜ್ಞೇಯ'ಗಳನ್ನು ಅಡಕವಾಗಿ ಹೇಳಿದಂತಾಯಿತು. ನನ್ನ ಭಕ್ತನಾದವನು ಇದನ್ನರಿತು ನನ್ನಲ್ಲೇ ನೆಲೆಸುತ್ತಾನೆ.

ಈ ಶ್ಲೋಕದಲ್ಲಿ ಕೃಷ್ಣ ಈವರೆಗೆ ಹೇಳಿದ ವಿಚಾರದ ಉಪಸಂಹಾರ ಮಾಡುತ್ತಾ ಹೇಳುತ್ತಾನೆ: "ಈ ತನಕ ಕ್ಷೇತ್ರದ ಬಗ್ಗೆ ಜ್ಞಾನಸಾಧನಗಳ ಬಗ್ಗೆ, ಈ ಜ್ಞಾನ ಸಾಧನಗಳಿಂದ ತಿಳಿದುಕೊಳ್ಳಬೇಕಾದ ಭಗವಂತನ ಬಗ್ಗೆ ಅಡಕವಾಗಿ(In a nutshell) ಹೇಳಿದ್ದಾಯಿತು. ಸೃಷ್ಟಿ, ಸೃಷ್ಟಿಯಾದ ಪ್ರಪಂಚ, ಪ್ರಪಂಚ ಸೃಷ್ಟಿಯ ಬಗೆ, ಸೃಷ್ಟಾರನಾದ ಭಗವಂತ- ಇದನ್ನು ತಿಳಿದರೆ ಮತ್ತೆ ತಿಳಿಯಬೇಕಾದದ್ದು ಏನೂ ಉಳಿಯುವುದಿಲ್ಲ. ಪೂರ್ಣ ನಂಬಿಕೆಯಿಂದ, ಭಕ್ತಿಯಿಂದ ಇದನ್ನು ಅರಿತ ಭಕ್ತ ನನ್ನನ್ನು ಸೇರುತ್ತಾನೆ" ಎನ್ನುತ್ತಾನೆ ಕೃಷ್ಣ. ಭಗವಂತನ ಬಗೆಗಿನ ಜ್ಞಾನ ಮತ್ತು ಭಕ್ತಿ ನಮ್ಮನ್ನು ಮೋಕ್ಷದತ್ತ ಕೊಂಡೊಯ್ಯಬಲ್ಲದು.

ಮುಂದಿನ ಶ್ಲೋಕದಲ್ಲಿ ಕೃಷ್ಣ ಮೂಲ ಸೃಷ್ಟಿಯ ಕಲ್ಪನೆ ಮತ್ತು ಅದರ ಅನುಸಂಧಾನವನ್ನು ವಿವರಿಸುತ್ತಾನೆ. ಈ ಶ್ಲೋಕ ಅಧ್ಯಾತ್ಮ ಪ್ರಪಂಚದಲ್ಲಿ ಸೃಷ್ಟಿಯ ಬಗೆಗಿನ ಎಲ್ಲಾ ಗೊಂದಲಗಳಿಗೆ ಕೃಷ್ಣ ಕೊಟ್ಟ ಉತ್ತರ. ಅಡಕವಾಗಿ ಎಲ್ಲವನ್ನು ಈ ಶ್ಲೋಕದ ಮೂಲಕ ಕೃಷ್ಣ ನಮ್ಮ ಮುಂದಿಟ್ಟಿದ್ದಾನೆ.

ಪ್ರಕೃತಿಂ ಪುರುಷಂ ಚೈವ ವಿದ್ಧ್ಯನಾದೀ ಉಭಾವಪಿ ।
ವಿಕಾರಾಂಶ್ಚ ಗುಣಾಂಶ್ಚೈವ ವಿದ್ಧಿ ಪ್ರಕೃತಿಸಂಭವಾನ್ ॥೧೯॥

ಪ್ರಕೃತಿಮ್ ಪುರುಷಮ್ ಚ ಏವ ವಿದ್ಧಿ ಅನಾದೀ ಉಭೌ ಅಪಿ ।
ವಿಕಾರಾನ್ ಚ ಗುಣಾನ್ ಚ ಏವ ವಿದ್ಧಿ ಪ್ರಕೃತಿ ಸಂಭವಾನ್ – ಪ್ರಕೃತಿ[ಜಡಪ್ರಕೃತಿ ಮತ್ತು ಚೇತನಪ್ರಕೃತಿ] ಮತ್ತು ಪುರುಷ[ಜೀವ ಮತ್ತು ಈಶ್ವರ] ಇಬ್ಬರೂ ಹುಟ್ಟಿರದವರು ಎಂದು ತಿಳಿ. ಸ್ಥೂಲರೂಪಗಳು ಮತ್ತು ಗುಣತ್ರಯಗಳು ಪ್ರಕೃತಿಯ ಕಾರ್ಯಗಳು ಎಂದು ತಿಳಿ.

ಭಗವಂತ ಯಾವುದೇ ಜೀವರನ್ನಾಗಲೀ, ಪ್ರಕೃತಿಯನ್ನಾಗಲೀ ಸೃಷ್ಟಿ ಮಾಡಿಲ್ಲ. ಜಡಪ್ರಕೃತಿ, ಚೇತನ ಪ್ರಕೃತಿ, ಪರಮಪುರುಷ(ಭಗವಂತ), ಅವಾಂತರಪುರುಷರು(ಜೀವರು) ಎಲ್ಲರೂ ಅನಾಧಿನಿತ್ಯರು. ಪ್ರಪಂಚ ಎಂದರೆ ಪ್ರಕೃತಿಯ ವಿಕಾರ. ಒಂದು ಮಗು ಹುಟ್ಟಿತು ಎಂದರೆ ಅಲ್ಲಿ ಆಗುವುದು ಜೀವದ ಸೃಷ್ಟಿ ಅಲ್ಲ. ಜೀವಕ್ಕೆ ಒಂದು ಆಕಾರದ ಸೃಷ್ಟಿ. ಜೀವ ತಂದೆಯ ದೇಹದ ಮುಖೇನ ತಾಯಿಯ ಗರ್ಭವನ್ನು ಸೇರಿ ಅಲ್ಲಿ ಒಂದು ಆಕಾರವನ್ನು ಪಡೆಯುತ್ತದೆ. ಈ ರೀತಿ ಭಗವಂತ ಜೀವರಿಗೆ ಪ್ರಕೃತಿಯ ಮೂಲಕ ಒಂದು ಆಕಾರ ಸೃಷ್ಟಿ ಮಾಡುತ್ತಾನೆ. ಸೃಷ್ಟಿಯ ಮೂಲದಲ್ಲೂ ಕೂಡಾ ಲಕ್ಷ್ಮೀನಾರಾಯಣರು ತಂದೆ-ತಾಯಿಯಾಗಿ ನಿಂತು ಪ್ರಪಂಚದ ಸೃಷ್ಟಿಗೆ ಚಾಲನೆ ಕೊಟ್ಟರು. ಸೃಷ್ಟಿಯ ಆದಿಯಲ್ಲಿ ಜೀವರು ಲಕ್ಷ್ಮೀದೇವಿಯ ಉದರದಲ್ಲಿದ್ದರು. ಲಕ್ಷ್ಮೀದೇವಿ ಪರಮಪುರುಷ ಭಗವಂತನ ಉದರದಲ್ಲಿದ್ದಳು. ಸೃಷ್ಟಿಯ ಮೂಲದಲ್ಲಿ ಲಕ್ಷ್ಮಿಯ ನೆತ್ತಿಯಿಂದ ಹೊರ ಹೊಮ್ಮಿ, ಭಗವಂತನ ನಾಭಿಯ ಮುಖೇನ ಚತುರ್ಮುಖಬ್ರಹ್ಮನ ಜನನವಾಯಿತು. ಈ ಕಾರಣದಿಂದ ಚತುರ್ಮುಖ ಬ್ರಹ್ಮನನ್ನು ಲಕ್ಷ್ಮಿಯ ಶಿರಸ್ಸಿನಿಂದ ಮತ್ತು ಭಗವಂತನ ನಾಭಿಯಿಂದ ಜನಿಸಿದವನು ಎಂದು ಕರೆಯುತ್ತಾರೆ. ಒಟ್ಟಿನಲ್ಲಿ "ಜಗತ್ತಿಗೆ ಕಾರಣವಾಗಿರುವ ಜಡಪ್ರಕೃತಿ ನಿತ್ಯ; ಆ ಜಡಪ್ರಕೃತಿಯಿಂದ ಆಕಾರಗೊಂಡು ಸೃಷ್ಟನಾದ ಜೀವನೂ ನಿತ್ಯ; ಈ ಜಡಪ್ರಕೃತಿ ಮತ್ತು ಜೀವನಿಗೆ ಕಾರಣಪುರುಷನಾದಂತಹ ಲಕ್ಷ್ಮೀನಾರಾಯಣರೂ ನಿತ್ಯರು; ಪ್ರಪಂಚ ಎಂದರೆ ಪ್ರಕೃತಿಯ ವಿಕಾರ". ಇದು ಇಲ್ಲಿ ನಾವು ತಿಳಿದುಕೊಳ್ಳಬೇಕಾಗಿರುವ ಮುಖ್ಯ ವಿಚಾರ.
ಮೊತ್ತ ಮೊದಲು ಸೃಷ್ಟಿ ವಿಸ್ತಾರಕ್ಕೆ ಬೇಕಾದ ಶಕ್ತಿ ಸೃಷ್ಟಿಯಾಯಿತು. ಅದೇ ಪ್ರಕೃತಿಯ ಅತ್ಯಂತ ಸೂಕ್ಷ್ಮ ವಿಕಾರವಾದ ಗುಣತ್ರಯಗಳು. ಈ ಶಕ್ತಿ ಕಂಪನದಿಂದ ಇಡೀ ಪ್ರಪಂಚ ನಿಷ್ಪನ್ನವಾಯಿತು. ಆಕಾರ ಕೊಟ್ಟಿದ್ದು ತಾಯಿ ಲಕ್ಷ್ಮಿ; ಆಕಾರ ಪಡೆದದ್ದು ಜೀವರು; ಆಕಾರ ಕೊಡುವವ ನಾರಾಯಣ. ಈ ಕಾರಣದಿಂದ ಚತುರ್ಮುಖ ಬ್ರಹ್ಮನಿಂದ ಹಿಡಿದು ಸಮಸ್ತ ದೇವಾದಿ ಜೀವರೂ ಲಕ್ಷ್ಮೀನಾರಾಯಣರ ಮಕ್ಕಳು.

ಮೇಲಿನ ಶ್ಲೋಕದಲ್ಲಿ ಕೃಷ್ಣ ಪುರುಷ ಮತ್ತು ಪ್ರಕೃತಿ ಬಗ್ಗೆ ಹೇಳಿದ. [ಪುರುಷ ಎಂದರೆ ಜೀವಾತ್ಮ ಮತ್ತು ಪರಮಾತ್ಮ. ಪ್ರಕೃತಿ ಎಂದರೆ ಜಡಪ್ರಕೃತಿ ಮತ್ತು ಚೇತನ ಪ್ರಕೃತಿ]. ಸೃಷ್ಟಿ ಪ್ರಕ್ರಿಯೆಯಲ್ಲಿ ಈ ನಾಲ್ಕು ಪಾತ್ರದ ವಿವರಣೆಯನ್ನು ಕೃಷ್ಣ ಮುಂದಿನ ಮೂರು ಶ್ಲೋಕಗಳಲ್ಲಿ ನಮ್ಮ ಮುಂದಿಟ್ಟಿದ್ದಾನೆ. ಮೊದಲ ಶ್ಲೋಕದಲ್ಲಿ(ಶ್ಲೋ-೨೦) ಕೃಷ್ಣ ಜೀವಾತ್ಮ-ಪರಮಾತ್ಮ, ಜಡಪ್ರಕೃತಿ-ಚೇತನಪ್ರಕೃತಿಯ ಒಟ್ಟು ವಿವರಣೆಯನ್ನು ಕೊಡುತ್ತಾನೆ. ನಂತರ(ಶ್ಲೋ-೨೧) ಕೇವಲ ಜಡಪ್ರಕೃತಿ ಮತ್ತು ಜೀವಾತ್ಮರ ವಿವರಣೆಯನ್ನು ಕೊಟ್ಟು, ಮೂರನೇ ಶ್ಲೋಕದಲ್ಲಿ(ಶ್ಲೋ-೨೨) ಸೃಷ್ಟಿ ಪ್ರಕ್ರಿಯೆಯಲ್ಲಿ ಪರಮಪುರುಷ ಮತ್ತು ಚೇತನಪ್ರಕೃತಿಯ ಪಾತ್ರದ ವಿವರಣೆಯನ್ನು ನಮ್ಮ ಮುಂದಿಡುತ್ತಾನೆ.

ಕಾರ್ಯಕಾರಣಕರ್ತೃತ್ವೇ ಹೇತುಃ ಪ್ರಕೃತಿರುಚ್ಯತೇ ।
ಪುರುಷಃ ಸುಖದುಃಖಾನಾಂ ಭೋಕ್ತೃತ್ವೇ ಹೇತುರುಚ್ಯತೇ ॥೨೦॥

ಕಾರ್ಯ ಕಾರಣ ಕರ್ತೃತ್ವೇ ಹೇತುಃ ಪ್ರಕೃತಿಃ ಉಚ್ಯತೇ ।
ಪುರುಷಃ ಸುಖಃ ದುಃಖಾನಾಂ ಭೋಕ್ತೃತ್ವೇ ಹೇತುಃ ಉಚ್ಯತೇ –ದೇಹ ಮತ್ತು ಇಂದ್ರಿಯಗಳ ನಿರ್ಮಾಣದಲ್ಲಿ ಜಡಪ್ರಕೃತಿ[ಚೇತನಪ್ರಕೃತಿಯಾದ ಶ್ರೀ ತತ್ವ] ಕಾರಣವೆನಿಸಿದೆ. ಸುಖ-ದುಃಖಗಳ ಅನುಭವದಲ್ಲಿ ಜೀವ[ಪರಮಾತ್ಮ] ಕಾರಣಭೂತನಾಗಿದ್ದಾನೆ.

ಈ ಶ್ಲೋಕದಲ್ಲಿ ಎರಡು ವಿಚಾರವನ್ನು ಕೃಷ್ಣ ಬಿಡಿಸಿ ತೋರಿದ್ದಾನೆ. ನಮಗೆ ಒಂದು ದೇಹವಿದೆ. ದೇಹದಲ್ಲಿ ಸುಖ-ದುಃಖ ಭೋಗವನ್ನು ಅನುಭವಿಸಲು ಐದು ಇಂದ್ರಿಯಗಳಿವೆ. ಹೀಗೆ ಶರೀರ, ಶರೀರದಲ್ಲಿ ಇಂದ್ರಿಯಗಳು-ಇಂದ್ರಿಯಗಳ ಮೂಲಕ ಸುಖ-ದುಃಖ ಭೋಗ-ಇದು ಜೀವನ. ಜೀವನಿಗೆ ಅವನು ಹಿಂದೆ ಮಾಡಿದ ಕರ್ಮಕ್ಕನುಗುಣವಾಗಿ ಕಾರ್ಯ ಕಾರಣಗಳ ಕರ್ತೃತ್ವ. ಅಂದರೆ ನಮ್ಮ ಕರ್ಮಕ್ಕನುಗುಣವಾಗಿ ಭಗವಂತ ಈ ಜನ್ಮದಲ್ಲಿ ಒಂದು ರೂಪವನ್ನು ಕೊಟ್ಟ. ಈ ನಮ್ಮ ದೇಹ ರೂಪುಗೊಳ್ಳಲು ಅಧಿಷ್ಠಾನಕಾರಣ ನಮ್ಮ ತಂದೆ ತಾಯಿ. ನಮ್ಮ ದೇಹ ಜಡಪ್ರಕೃತಿಯಿಂದಾಗಿದೆ. ತಾಯಿಯ ಹೊಟ್ಟೆಯಲ್ಲಿ ನಮಗೆ ಈ ರೂಪವನ್ನು ಕೊಟ್ಟವಳು ಜಗನ್ಮಾತೆ ಶ್ರೀಲಕ್ಷ್ಮಿ. ಭಗವಂತನಿಗೆ ಅಂಗವಾಗಿ ಲಕ್ಷ್ಮಿ ದೇಹ ರಚನೆ ಮಾಡುತ್ತಾಳೆ. ಈ ರೀತಿ ದೇಹದ ಅಂಗಾಂಗ ಮತ್ತು ಇಂದ್ರಿಯಗಳನ್ನು ಪಡೆದ ಜೀವ, ಅದರಿಂದ ಸುಖ-ದುಃಖದ ಭೋಗವನ್ನು ಅನುಭವಿಸುತ್ತದೆ. ಪರಮಪುರುಷ ಭಗವಂತ ಜೀವನಿಗೆ ಸುಖ-ದುಃಖದ ಅನುಭವವನ್ನು ಕೊಡುತ್ತಾನೆ. ಹೀಗಾಗಿ ದೇಹರಚನೆಯಲ್ಲಿ ಚೇತನ ಮತ್ತು ಜಡ ಪ್ರಕೃತಿ ಒಳಗೊಂಡರೆ, ಭಗವಂತ ಜೀವನಿಗೆ ಭೋಕ್ತೃತ್ವದ ಅನುಭವವನ್ನು ಸ್ವಯಂ ಅಂತರ್ಯಾಮಿಯಾಗಿ ನಿಂತು ನೀಡುತ್ತಾನೆ.

ಪುರುಷಃ ಪ್ರಕೃತಿಸ್ಥೋ ಹಿ ಭುಂಕ್ತೇ ಪ್ರಕೃತಿಜಾನ್ ಗುಣಾನ್।
ಕಾರಣಂ ಗುಣಸಂಗೋಽಸ್ಯ ಸದಸದ್ಯೋನಿಜನ್ಮಸು ॥೨೧॥

ಪುರುಷಃ ಪ್ರಕೃತಿಸ್ಥಃ ಹಿ ಭುಂಕ್ತೇ ಪ್ರಕೃತಿಜಾನ್ ಗುಣಾನ್ ।
ಕಾರಣಮ್ ಗುಣಸಂಗಃ ಅಸ್ಯ ಸತ್ ಅಸತ್ ಯೋನಿ ಜನ್ಮಸು –ಪ್ರಕೃತಿಯ ಕಟ್ಟಿಗೊಳಗಾದ ಜೀವ, ಪ್ರಕೃತಿ ಕಾರ್ಯಗಳಾದ ಸುಖ-ದುಃಖಾದಿಗಳನ್ನು ಅನುಭವಿಸುತ್ತಾನೆ. ಒಳ್ಳೆಯ ಮತ್ತು ಕೆಟ್ಟ ಬಸಿರಿನಲ್ಲಿ ಹುಟ್ಟಿಬರಲು ಜೀವನಿಗೆ ತ್ರಿಗುಣಗಳ ನಂಟೇ ಕಾರಣ.

ಪ್ರಕೃತಿ ನಿರ್ಮಿತವಾದ ದೇಹದಲ್ಲಿ ಭಗವಂತನಿದ್ದಾನೆ, ದೇವತೆಗಳಿದ್ದಾರೆ. ಆದರೆ ದೇಹದಲ್ಲಿದ್ದು ಸುಖ-ದುಃಖದ ಭೋಗವನ್ನು ಅನುಭವಿಸುವವನು-ಜೀವ. ದೇಹ ಪ್ರಕೃತಿಯ ಗುಣದಿಂದ ನಿರ್ಮಾಣವಾಗಿರುತ್ತದೆ. ಜೀವ ತನ್ನ ಸ್ವಭಾವಕ್ಕನುಗುಣವಾಗಿ, ಪೂರ್ವ ಜನ್ಮದ ಕರ್ಮಫಲಕ್ಕನುಗುಣವಾಗಿ ಈ ಜನ್ಮದಲ್ಲಿ ದೇಹವನ್ನು ಪಡೆಯುತ್ತದೆ.

ಹಿಂದೆ ಹೇಳಿದಂತೆ ಜೀವ ತನ್ನ ದೇಹವನ್ನು ಬಿಟ್ಟು ಹೊರಬರುವಾಗ ಯಾವುದನ್ನು ಗಾಢವಾಗಿ ನೆನೆಯುತ್ತದೋ - ಅದಕ್ಕನುಗುಣವಾಗಿ ಅದರ ಮುಂದಿನ ಜನ್ಮ ನಿರ್ಧಾರವಾಗುತ್ತದೆ. ಉತ್ತಮ ಅಥವಾ ಹೀನ ಯೋನಿಯಲ್ಲಿ ಹುಟ್ಟಿಬರಲು ಜೀವನಿಗೆ ತ್ರಿಗುಣಗಳ ನಂಟೇ ಕಾರಣ.

ಉಪದ್ರಷ್ಟಾಽನುಮಂತಾ ಚ ಭರ್ತಾ ಭೋಕ್ತಾ ಮಹೇಶ್ವರಃ ।
ಪರಮಾತ್ಮೇತಿ ಚಾಪ್ಯುಕ್ತೋ ದೇಹೇಽಸ್ಮಿನ್ ಪುರುಷಃ ಪರಃ ॥೨೨॥

ಉಪದ್ರಷ್ಟಾ ಅನುಮಂತಾ ಚ ಭರ್ತಾ ಭೋಕ್ತಾ ಮಹೇಶ್ವರಃ ।
ಪರಮಾತ್ಮ ಇತಿ ಚ ಅಪಿ ಉಕ್ತಃ ದೇಹೇ ಅಸ್ಮಿನ್ ಪುರುಷಃ ಪರಃ –ಎಲ್ಲದರ ಮೇಲಿದ್ದು ಎಲ್ಲವನು ನೋಡುವವನು, ತನ್ನಿಷ್ಟದಂತೆ ಎಲ್ಲವನು ನಡೆಸುವವನು, ಎಲ್ಲವನು ಹೊತ್ತವನು, ಸಾರವನುಣ್ಣುವವನು-ಸರ್ವಶಕ್ತನಾದ ಪರಮಾತ್ಮ. ಅವನೇ ಈ ದೇಹದಲ್ಲಿ ಜೀವನ ಜೊತೆಗಿರುವ ಪರಮಪುರುಷ.

ಚಿತ್ ಪ್ರಕೃತಿ ಜಡಪ್ರಕೃತಿಯಿಂದ ದೇಹ ನಿರ್ಮಿಸುವಾಗ, ಜೀವ ಆ ದೇಹದಲ್ಲಿದ್ದು ಇಂದ್ರಿಯಗಳ ಮುಖೇನ ಸುಖ ದುಃಖವನ್ನು ಭೋಗಿಸುವಾಗ- ಎಲ್ಲದಕ್ಕೂ ಪ್ರೇರಕನಾಗಿ, ಎಲ್ಲವುದಕ್ಕಿಂತ ಎತ್ತರದಲ್ಲಿದ್ದು ಎಲ್ಲವನ್ನೂ ಹತ್ತಿರದಿಂದ ಸಾಕ್ಷಾತ್ ಕಾಣುವ ಭಗವಂತ ಪರಮಪುರುಷ. ಆತ ನಮ್ಮ ಕರ್ಮವನ್ನು ಬಲ್ಲವನು. ಯಾವ ರೀತಿಯ ಕರ್ಮದಿಂದ ಏನಾಗಬೇಕು ಎಂದು ತಿಳಿದವನು. ಆತ ಒಳಗೆ ಕೂತು ಪ್ರೇರಣೆ ಮಾಡುವುದರಿಂದ ಈ ದೇಹ ನಿಂತಿದೆ. ಆತ ಹೊರಟು ಹೋದರೆ ದೇಹ ಬಿದ್ದು ಹೋಗುತ್ತದೆ. ಆತ ನಮ್ಮೊಳಗಿದ್ದು ಯಾವ ದುಃಖದ ಸ್ಪರ್ಶವೂ ಇಲ್ಲದೆ ಸದಾ ಆನಂದದಿಂದಿರುವ ಆನಂದ ಭೋಕ್ತ.

ಯ ಏವಂ ವೇತ್ತಿ ಪುರುಷಂ ಪ್ರಕೃತಿಂ ಚ ಗುಣೈಃ ಸಹ ।
ಸರ್ವಥಾ ವರ್ತಮಾನೋಽಪಿ ನ ಸ ಭೂಯೋಽಭಿಜಾಯತೇ ॥೨೩॥

ಯಃ ಏವಮ್ ವೇತ್ತಿ ಪುರುಷಮ್ ಪ್ರಕೃತಿಮ್ ಚ ಗುಣೈಃ ಸಹ ।
ಸರ್ವಥಾ ವರ್ತಮಾನಃ ಅಪಿ ನ ಸಃ ಭೂಯಃ ಅಭಿಜಾಯತೇ –ಹೀಗೆ ಪ್ರಕೃತಿ-ಪುರುಷರನ್ನು ಗುಣಗಳ ಜತೆಗೆ ಅರಿತವನು ಹೇಗೆ ಬದುಕಿದರೂ ಮತ್ತೆ ಮರಳಿ ಹುಟ್ಟುವುದಿಲ್ಲ.

ಅನಾಧಿನಿತ್ಯವಾದ ಪ್ರಕೃತಿ(ಜಡ ಮತ್ತು ಚೇತನ), ಎಲ್ಲವುದಕ್ಕೂ ಕಾರಣ ಪುರುಷನಾದ ಪರಮಾತ್ಮ, ಆತನ ಅಧೀನವಾಗಿರುವ ಜೀವಜಾತ ಇದನ್ನು ಗುಣಗಳ ಜೊತೆಗೆ ಅರಿತವನು ಜ್ಞಾನಿ. ಇಂತಹ ಜ್ಞಾನಿ ಬಾಹ್ಯವಾಗಿ ಹೇಗೆ ಕಾಣಿಸಿಕೊಂಡರೂ ಕೂಡಾ, ಸತ್ಯದ ಸಾಕ್ಷಾತ್ಕಾರದಿಂದ ಆತ ಮೋಕ್ಷವನ್ನು ತಲುಪುತ್ತಾನೆ. ಇಲ್ಲಿ ಬಾಹ್ಯ ಸಂಸ್ಕಾರಕ್ಕಿಂತ ಜ್ಞಾನ ಎಷ್ಟು ಮುಖ್ಯ ಎನ್ನುವುದನ್ನು ಕೃಷ್ಣ ಒತ್ತಿ ಹೇಳಿದ್ದಾನೆ. ಮುಖವಾಡದ ಬದುಕಿನಿಂದ ಏನೂ ಉಪಯೋಗವಿಲ್ಲ. ಅದಕ್ಕಿಂತ ಮಿಗಿಲಾದದ್ದು ಸತ್ಯದ ಸಾಕ್ಷಾತ್ಕಾರ. ಸತ್ಯದ ಸಾಕ್ಷಾತ್ಕಾರವಾದಾಗ

ತಾನಾಗಿಯೇ ಲೌಕಿಕ ಪ್ರಪಂಚ ಎಷ್ಟು ಅರ್ಥಹೀನ ಎನ್ನುವುದು ತಿಳಿಯುತ್ತದೆ. ಜ್ಞಾನಕ್ಕಿಂತ ಮಿಗಿಲಾದ ಇನ್ನೊಂದು ಪವಿತ್ರಸಾಧನವಿಲ್ಲ. ಕರ್ಮಾನುಷ್ಠಾನದಲ್ಲಿ ಅಕಾಸ್ಮಾತ್ ಚ್ಯುತಿಯಾದರೂ ಜ್ಞಾನ ಮಾರ್ಗದಲ್ಲಿ ಸಾಗುವವನಿಗೆ ಅದು ಬಾಧಕವಾಗುವುದಿಲ್ಲ. ಜ್ಞಾನ ಅವನನ್ನು ಸರಿದಾರಿಗೆ ತಂದು ನಿಲ್ಲಿಸುತ್ತದೆ ಮತ್ತು ಆತ ಮೋಕ್ಷವನ್ನು ಪಡೆಯುತ್ತಾನೆ.

ಕೃಷ್ಣ ಪ್ರಕೃತಿ ಮತ್ತು ಪುರುಷನನ್ನು ಗುಣ ಸಹಿತ ತಿಳಿಯುವುದು ಮೋಕ್ಷಮಾರ್ಗ ಎಂದು ಹೇಳಿದ. ಹಾಗಿದ್ದರೆ ಇದನ್ನು ತಿಳಿಯುವ ಬಗೆ ಯಾವುದು? ಇದನ್ನು ಕೃಷ್ಣ ಮುಂದಿನ ಎರಡು ಶ್ಲೋಕಗಳಲ್ಲಿ ವಿವರಿಸುತ್ತಾನೆ. ಭಗವಂತನನ್ನು ಸೇರಲು ಅನೇಕ ವಿಧಾನಗಳಿವೆ. ಎಲ್ಲರಿಗೂ ಎಲ್ಲವೂ ಅಲ್ಲ. ಏಕೆಂದರೆ ಒಬ್ಬರು ತಿಳಿದಂತೆ ಇನ್ನೊಬ್ಬರು ತಿಳಿದುಕೊಳ್ಳಲು ಆಗುವುದಿಲ್ಲ. ಬನ್ನಿ ಈ ಕುರಿತು ಕೃಷ್ಣನ ವಿವರಣೆಯನ್ನು ಆಲಿಸೋಣ.

ಧ್ಯಾನೇನಾಽತ್ಮನಿ ಪಶ್ಯಂತಿ ಕೇಚಿದಾತ್ಮಾನಮಾತ್ಮನಾ ।
ಅನ್ಯೇ ಸಾಂಖ್ಯೇನ ಯೋಗೇನ ಕರ್ಮಯೋಗೇನ ಚಾಪರೇ ॥೨೪॥

ಧ್ಯಾನೇನ ಆತ್ಮನಿ ಪಶ್ಯಂತಿ ಕೇಚಿತ್ ಆತ್ಮಾನಮ್ ಆತ್ಮನಾ ।
ಅನ್ಯೇ ಸಾಂಖ್ಯೇನ ಯೋಗೇನ ಕರ್ಮಯೋಗೇನ ಚ ಅಪರೇ -ಕೆಲವರು ಧ್ಯಾನದ ಮೂಲಕ ಪರಮಾತ್ಮನನ್ನು ತನ್ನಲ್ಲಿ ಬಗೆಗಣ್ಣಿನಿಂದ ಕಾಣುತ್ತಾರೆ. ಕೆಲವರು ಶಾಸ್ತ್ರದ ಅರಿವಿನ ಮೂಲಕ. ಕೆಲವರು ಕರ್ಮಯೋಗದ ಮೂಲಕ.

ಸಾಧನೆ ಮಾಡಲು ಮೊದಲು ನಮಗೆ ಸಾಧನಾ ಶರೀರ ಬೇಕು. ಹೀನಯೋನಿಯಲ್ಲಿ ಪೂರ್ಣತೆ ಪಡೆಯದ ಶರೀರದಲ್ಲಿ ಹುಟ್ಟಿ ಬಂದರೆ ಸಾಧನೆ ಸಾಧ್ಯವಿಲ್ಲ. ಮೊದಲು ನಾವು ಮಾನವರಾಗಬೇಕು(ಪೂರ್ಣತೆಯನ್ನು ಪಡೆದ ಶರೀರದಲ್ಲಿ ನೆಲೆಸುವ ಪುರುಷರಾಗಬೇಕು). ಇದಕ್ಕಾಗಿ "ಮಾನವ ಜನ್ಮ ದೊಡ್ಡದು, ಅದನ್ನು ಹಾಳು ಮಾಡಿ ಕೊಳ್ಳದಿರಿ ಹುಚ್ಚಪ್ಪಗಳಿರಾ! " ಎಂದು ದಾಸರು ಹಾಡಿರುವುದು. ಸಾಧನೆಗೆ ಬೇಕಾದ ಸಾಧನಾ ಶರೀರ ಇಲ್ಲದಿದ್ದರೆ ಯಾವಸಾಧನೆಯೂ ಸಾಧ್ಯವಿಲ್ಲ.
ಕೆಲವರು ತಮ್ಮ ಸ್ವರೂಪ ಯೋಗ್ಯತೆಯಿಂದ ಮತ್ತು ಭಗವದನುಗ್ರಹದಿಂದ ಜನ್ಮತಃ ಜ್ಞಾನ ಪಡೆದು ಹುಟ್ಟುತ್ತಾರೆ. ಇವರಿಗೆ ಜ್ಞಾನ ನಿಚ್ಚಳ. ಇಂತವರು ತಮ್ಮ ಜೀವ ಯೋಗ್ಯತೆಯಿಂದ ತಮ್ಮ ಜೀವ ಸ್ವರೂಪದೊಳಗೆ- ಬಿಂಬರೂಪಿ ಭಗವಂತನನ್ನು ಕಾಣಬಲ್ಲರು. ಇಂತವರು ಯಾವುದೇ ಅಧ್ಯಯನ ಮಾಡದೆ ಸದಾ ಭಗವಂತನನ್ನು ಅಂತರಂಗದಲ್ಲಿ ಕಾಣುತ್ತಾ-ಭಗವಂತನನ್ನು ಸೇರುತ್ತಾರೆ. ಬ್ರಹ್ಮಾದಿ ಸಕಲ ದೇವತೆಗಳು, ದೇವಾಂಶ ಸಂಭೂತರು ಈ ರೀತಿ ಕಣ್ಮುಚ್ಚಿ ಭಗವಂತನನ್ನು ಕಾಣಬಲ್ಲರು, ಕಂಡು ಆತನನ್ನು ಸೇರಬಲ್ಲರು.
ಕೆಲವರು ಶುದ್ಧ ಆತ್ಮತತ್ವ ವಿಜ್ಞಾನದಿಂದ ಮೊದಲು ಭಗವಂತನನ್ನು ತಿಳಿಯುತ್ತಾರೆ. ಜೀವನನ್ನು, ಪರಮಾತ್ಮನನ್ನು ತಿಳಿಯುವುದೇ ಸಾಂಖ್ಯಯೋಗ. ಈ ರೀತಿ ಜ್ಞಾನಗಳಿಸಿ, ಜ್ಞಾನಸ್ಫುರಣವನ್ನು ಗಳಿಸಿ, ಧ್ಯಾನದ ಮೂಲಕ ಇವರು ಭಗವಂತನನ್ನು ಕಂಡು ಭಗವಂತನನ್ನು ಸೇರುತ್ತಾರೆ.

ಇನ್ನು ಕೆಲವರು ತಮ್ಮ ನಿರಂತರ ಕರ್ಮಾನುಷ್ಠಾನದಿಂದ ದೇಹ ಶುದ್ಧಿ ಸಾಧಿಸಿ, ಅದರಿಂದ ಭಗವಂತನ ಒಲುಮೆಗೆ ಪಾತ್ರರಾಗಿ, ಜ್ಞಾನಗಳಿಸಿ, ಧ್ಯಾನದಲ್ಲಿ ಭಗವಂತನನ್ನು ಕಂಡು ಭಗವಂತನನ್ನು ಸೇರುತ್ತಾರೆ.

ಅನ್ಯೇ ತ್ವೇವಮಜಾನಂತಃ ಶ್ರುತ್ವಾಽನ್ಯೇಭ್ಯ ಉಪಾಸತೇ ।
ತೇಽಪಿ ಚಾತಿತರಂತ್ಯೇವ ಮೃತ್ಯುಂ ಶ್ರುತಿಪರಾಯಣಾಃ ॥೨೫॥

ಅನ್ಯೇ ತು ಏವಂ ಅಜಾನಂತಃ ಶ್ರುತ್ವಾ ಅನ್ಯೇಭ್ಯಃ ಉಪಾಸತೇ ।
ತೇ ಅಪಿ ಚ ಅತಿತರಂತಿ ಏವ ಮೃತ್ಯುಮ್ ಶ್ರುತಿಪರಾಯಣಾಃ –ಹೀಗೆ ಭಗವಂತನನ್ನರಿಯಲಾರದ ಇನ್ನು ಕೆಲವರು ಬಲ್ಲವರಿಂದ ಕೇಳಿ ಉಪಾಸನೆ ಮಾಡುತ್ತಾರೆ. ಶ್ರವಣವನ್ನೇ ನಂಬಿ ನಡೆವ ಅವರೂ ಸಾಧನೆಯಿಂದ ಬೆಳೆದು ಸಾವನ್ನು ಗೆಲ್ಲುತ್ತಾರೆ.

ಜನಸಾಮಾನ್ಯರು, ಮೇಲಿನ ಯಾವ ವಿಧದಲ್ಲೂ ಸಾಧನೆ ಮಾಡಲಾರದವರು-ಇನ್ನೊಬ್ಬರಿಂದ ಕೇಳಿ ತಿಳಿದು ಸಾಧನೆಯ ಮೊದಲ ಮೆಟ್ಟಿಲನ್ನು ಹತ್ತಬಲ್ಲರು. ಇದು ಸಾಧನೆಯ ಮಾರ್ಗದಲ್ಲಿನ ಅತ್ಯಂತ ಕೆಳಗಿನ ಮೆಟ್ಟಿಲಾದರೂ ಸಹ, ಇವರು ನಿರಂತರ ಶ್ರವಣ, ಮನನ, ನಿಧಿಧ್ಯಾಸನದಿಂದ, ಅಹಂಕಾರವಿಲ್ಲದೆ, ಜ್ಞಾನ ಸಂಪಾದಿಸಿ, ಆ ಜ್ಞಾನದಿಂದ-ಧ್ಯಾನದಲ್ಲಿ ಭಗವಂತನನ್ನು ಕಾಣಬಲ್ಲರು. ಇದು ಸಾಮಾನ್ಯ ಮಾನವನಿಗೆ ಕೃಷ್ಣ ತೋರಿಸಿದ ಮೋಕ್ಷ ಮಾರ್ಗ. ಹೀಗೆ ಇವರು ಶ್ರವಣ ಮತ್ತು ಉಪಾಸನೆಯಿಂದ ಮೃತ್ಯುವನ್ನು ಗೆದ್ದು ಭಗವಂತನನ್ನು ಸೇರಬಲ್ಲರು.

ಯಾವತ್ ಸಂಜಾಯತೇ ಕಿಂಚಿತ್ ಸತ್ತ್ವಂ ಸ್ಥಾವರಜಂಗಮಮ್ ।
ಕ್ಷೇತ್ರಕ್ಷೇತ್ರಜ್ಞಸಂಯೋಗಾತ್ ತದ್ ವಿದ್ಧಿ ಭರತರ್ಷಭ ॥೨೬॥

ಯಾವತ್ ಸಂಜಾಯತೇ ಕಿಂಚಿತ್ ಸತ್ವಮ್ ಸ್ಥಾವರ ಜಂಗಮಮ್ ।
ಕ್ಷೇತ್ರ ಕ್ಷೇತ್ರಜ್ಞ ಸಂಯೋಗಾತ್ ತತ್ ವಿದ್ಧಿ ಭರತರ್ಷಭ -- ಭರತರ್ಷಭಾ, ಸ್ಥಿರ-ಚರ ಜೀವಿಯಲ್ಲಿ ಯಾವುದು ಹುಟ್ಟಿದರೂ ಅದು ಕ್ಷೇತ್ರ[ಶ್ರೀತತ್ವ] ಮತ್ತು ಕ್ಷೇತ್ರಜ್ಞನಾದ ಭಗವಂತನ ಸಹಯೋಗದಿಂದಲೇ ಎಂದು ತಿಳಿ.

ಈ ಪ್ರಪಂಚದಲ್ಲಿ ಏನೆಲ್ಲಾ ಹುಟ್ಟುತ್ತದೋ, ಚಲಿಸುವ-ಚಲಿಸದಿರುವ ಸಮಸ್ತ ಜೀವ ಜಡಾತ್ಮಕ ಪ್ರಪಂಚ ಮತ್ತು ಅದರ ಅಭಿಮಾನಿನಿಯಾದ ಪ್ರಕೃತಿದೇವಿ-ಇಷ್ಟನ್ನು ಒಟ್ಟಿಗೆ ಕ್ಷೇತ್ರವೆನ್ನುತ್ತಾರೆ. ಇವೆಲ್ಲವನ್ನು ಬಲ್ಲವ ಕ್ಷೇತ್ರಜ್ಞನಾದ ಭಗವಂತ. ಆದ್ದರಿಂದ ಕ್ಷೇತ್ರವೆಂದರೆ ಭಗವಂತನಿಂದ ನಿರ್ಮಾಣವಾದ ಸಮಸ್ತ ಜೀವ ಜಡಾತ್ಮಕ ಪ್ರಪಂಚ. ಸಮಸ್ತ ಸೃಷ್ಟಿ ಲಕ್ಷ್ಮೀ ನಾರಾಯಣರ ಸಮಾಗಮದಿಂದ ನಿರ್ಮಾಣವಾಯಿತು. ಅವರು ಈ ಪ್ರಪಂಚದ ಮೊದಲ ದಂಪತಿಗಳು. ಆದ್ದರಿಂದ ಎಲ್ಲರ ತಂದೆ ತಾಯಿ ನಾರಾಯಣ ಮತ್ತು ಶ್ರೀಲಕ್ಷ್ಮಿ. “ಇದನ್ನು ತಿಳಿದಾಗ

ನೀನು ನಿಜವಾದ ಭರತರ್ಷಭನಾಗುತ್ತೀಯ" ಎನ್ನುತ್ತಾನೆ ಕೃಷ್ಣ. ಭಗವಂತನಲ್ಲಿ ರಥನಾದವನು, ಭಗವಂತನಲ್ಲಿ ಪೂರ್ಣಭಕ್ತಿ ಉಳ್ಳವನು ಭರತರ್ಷಭ.

ಸಮಂ ಸರ್ವೇಷು ಭೂತೇಷು ತಿಷ್ಠಂತಂ ಪರಮೇಶ್ವರಮ್ ।
ವಿನಶ್ಯತ್ಸ್ವವಿನಶ್ಯಂತಂ ಯಃ ಪಶ್ಯತಿ ಸ ಪಶ್ಯತಿ ॥೨೭॥

ಸಮಮ್ ಸರ್ವೇಷು ಭೂತೇಷು ತಿಷ್ಠಂತಂ ಪರಮೇಶ್ವರಮ್ ।
ವಿನಶ್ಯತ್ಸು ಅವಿನಶ್ಯಂತಂ ಯಃ ಪಶ್ಯತಿ ಸಃ ಪಶ್ಯತಿ – ಎಲ್ಲಾ ಜೀವಿಗಳಲ್ಲೂ ಏಕರೂಪದಿಂದಿರುವವನು ಸರ್ವಶಕ್ತನಾದ ಭಗವಂತ-ಅವು ಅಳಿದಾಗಲೂ ಅಳಿಯದೇ ಉಳಿದವನು. ಅವನನ್ನು ತಿಳಿದವನೇ 'ನಿಜವಾಗಿ ತಿಳಿದವನು'.

ಎಲ್ಲಾ ಜೀವರೊಳಗೂ ಏಕರೂಪದಿಂದಿರುವ ಸರ್ವಶಕ್ತ ಭಗವಂತ ಪರಮ-ಈಶ-ವರ. ಯಾರ ಆಜ್ಞೆಯನ್ನು ನಾವು ಪಾಲಿಸದೇ ಇರಲಾರೆವೋ; ಪಾಲಿಸುವುದು ನಮ್ಮ ಕರ್ತವ್ಯವೋ; ನಮಗರಿವಿಲ್ಲದೇ ನಮ್ಮೊಳಗಿದ್ದು ಪಾಲಿಸುವ ಅಜ್ಞಾತಶಕ್ತಿ- 'ಈಶ-ವರ'. ಅಂದರೆ ತತ್ತ್ವಾಭಿಮಾನಿ ದೇವತೆಗಳು. ಇಂತಹ ತತ್ತ್ವಾಭಿಮಾನಿ ದೇವತೆಗಳನ್ನೂ ನಿಯಂತ್ರಿಸುವ ಭಗವಂತ ಪರಮೇಶ್ವರ. ಇಂತಹ ಭಗವಂತ ಎಲ್ಲೋ ಕೂತು ನಮ್ಮನ್ನು ನಿಯಮಿಸುತ್ತಿಲ್ಲ. ಆತ ನಮ್ಮೊಳಗಿದ್ದು ನಮ್ಮನ್ನು ನಿಯಂತ್ರಿಸುತ್ತಿದ್ದಾನೆ. ಆತ ನಮ್ಮೊಳಗೆ ಸ್ವತಂತ್ರವಾಗಿದ್ದು ನಮ್ಮನ್ನು ಹೊತ್ತು ನಡೆಸುತ್ತಿದ್ದಾನೆ [ಹಿಂದಿನ ಕಾಲದವರು ಜನರಿಗೆ ಈ ಸಂದೇಶವನ್ನು ದೇವಸ್ಥಾನದಲ್ಲಿ ತಟ್ಟೆರಾಯನ ಮೂಲಕ ಕೊಟ್ಟರು]. ಭಗವಂತ ಮುಕ್ತಾSSಮುಕ್ತ ನಿಯಾಮಕ. ಎಲ್ಲರನ್ನೂ ಎಲ್ಲಾ ಕಾಲದಲ್ಲಿ ಅವರವರ ಯೋಗ್ಯತೆಗನುಗುಣವಾಗಿ, ಆಯಾ ವಸ್ತುವಿನ ಸ್ವಭಾವಕ್ಕನುಗುಣವಾಗಿ ಒಳಗಿದ್ದು ಪ್ರೇರಣೆ ಮಾಡುವವ ಭಗವಂತ. ಭಗವಂತನ ಶಕ್ತಿಯಲ್ಲಿ ಮೇಲು ಕೀಳು ಇಲ್ಲ. ಆನೆಯಲ್ಲಿರುವ ಭಗವಂತ ಇರುವೆಯಲ್ಲಿರುವ ಭಗವಂತ ಬೇರೆಬೇರೆ ಅಲ್ಲ. ಆದರೆ ಆತನ ಸನ್ನಿಧಾನದಲ್ಲಿ ವ್ಯತ್ಯಾಸವಿರುವುದರಿಂದ ಆ ಸನ್ನಿಧಾನದ ಅಧಿಷ್ಠಾನದಲ್ಲಿ ವ್ಯತ್ಯಾಸ ಬರುತ್ತದೆ. ನಮ್ಮ ದೇಹದಲ್ಲಿರುವ ಬಿಂಬ ರೂಪಿ ಭಗವಂತ ಅವಿನಾಶಿ. ಆತನಿಗೆ ದೇಹನಾಶ, ಸ್ವರೂಪನಾಶವಿಲ್ಲ. ದುಃಖಪ್ರಾಪ್ತಿ ಇಲ್ಲ. ಆತ ಅಪೂರ್ಣನಲ್ಲ. ಈ ಸತ್ಯವನ್ನು ತಿಳಿದವನು ಯಥಾರ್ಥ ಜ್ಞಾನವುಳ್ಳವನು. ಈ ಶ್ಲೋಕದಲ್ಲಿ ಹೇಳಿದ ವಿಚಾರವನ್ನು ಇನ್ನೂ ಬಿಡಿಸಿ ಮತ್ತೆ ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರಿಸುತ್ತಾನೆ:

ಸಮಂ ಪಶ್ಯನ್ ಹಿ ಸರ್ವತ್ರ ಸಮವಸ್ಥಿತಮೀಶ್ವರಮ್ ।
ನ ಹಿನಸ್ತ್ಯಾತ್ಮನಾSSತ್ಮಾನಂ ತತೋ ಯಾತಿ ಪರಾಂ ಗತಿಮ್ ॥೨೮॥

ಸಮಮ್ ಪಶ್ಯನ್ ಹಿ ಸರ್ವತ್ರ ಸಮವಸ್ಥಿತಮ್ ಈಶ್ವರಮ್ ।
ನ ಹಿನಸ್ತಿ ಆತ್ಮನಾ ಆತ್ಮನಮ್ ತತಃ ಯಾತಿ ಪರಾಮ್ ಗತಿಮ್ – ಸರ್ವ ಶಕ್ತನಾದ ಭಗವಂತ ಎಲ್ಲೆಡೆಯೂ ಏರುಪೇರಿಲ್ಲದೆ ಏಕರೂಪನಾಗಿದ್ದಾನೆ ಎಂದು ತಿಳಿದವನು ತನ್ನ ಏಳಿಗೆಗೆ ತಾನೇ ತಾನು ಅಡ್ಡಿಯನೊಡ್ಡಿಕೊಳ್ಳುವುದಿಲ್ಲ. ಮುಂದೆ ಪರಮ ಪದವನ್ನು ಪಡೆಯುತ್ತಾನೆ.

ನಾವು ನಮ್ಮ ದೇಹದಲ್ಲಿ ಸ್ಥಿತರು. ಆದರೆ ಭಗವಂತ 'ಸಂಸ್ಥಿತ' . ಈ ದೇಹದೊಳಗಿರುವ ನಮಗೆ ಈ ದೇಹದ ಜ್ಞಾನ ಕೂಡಾ ಇಲ್ಲ. ಏಕಿದ್ದೇವೆ ಎಂದೂ ಗೊತ್ತಿಲ್ಲ. ನಾವು ಒಳಗಿದ್ದು ಆನಂದ ದುಃಖವನ್ನು ಅನುಭವಿಸುತ್ತಿರುತ್ತೇವೆ. ಆದರೆ ಭಗವಂತ ದುಃಖ ಅಜ್ಞಾನದ ಸ್ಪರ್ಶವಿಲ್ಲದ ಆನಂದಮೂರ್ತಿ. ಆತ ನಮ್ಮೊಳಗಿರುವ ಸರ್ವ ತತ್ತ್ವಾಭಿಮಾನಿ ದೇವತೆಗಳಿಗೆ ಸಮವಸ್ಥಿತನಾಗಿ ಎತ್ತರದಲ್ಲಿದ್ದಾನೆ. ದುಃಖ ಅಜ್ಞಾನದ ಸ್ಪರ್ಶವಿಲ್ಲದ ಭಗವಂತ ಯಾರನ್ನೂ ಮೇಲು-ಕೀಳು ಭಾವದಿಂದ ನೋಡುವುದಿಲ್ಲ. ಪ್ರತಿಯೊಬ್ಬರನ್ನೂ ಅವರವರ ಕರ್ಮ ಮತ್ತು ಜೀವಯೋಗ್ಯತೆಗೆ ತಕ್ಕಂತೆ ಸಮನಾಗಿ ಕಾಣುತ್ತಾನೆ. ಭಗವಂತ ಸಮಸ್ತ ಜಡ-ಚೇತನದೊಳಗೆ ಜಗದೀಶ್ವರನಾಗಿ ನಿಂತು ನಮ್ಮ ಜೀವ ಸ್ವಭಾವಕ್ಕೆ ತಕ್ಕಂತೆ, ಕರ್ಮಕ್ಕನುಗುಣವಾಗಿ ನಮ್ಮನ್ನು ನಡೆಸುತ್ತಿದ್ದಾನೆ. ಈ ಸತ್ಯ ತಿಳಿದಾಗ "ನೀನು ನಿನಗೆ ಹಿಂಸೆ ಮಾಡದೆ ಬದುಕಬಹುದು" ಎನ್ನುತ್ತಾನೆ ಕೃಷ್ಣ. ನಿನ್ನ ಅರಿವಿಲ್ಲದೆ, ಭಗವಂತನ ಅರಿವಿಲ್ಲದೆ ಬದುಕುವುದು ಒಂದು ಆತ್ಮಹಿಂಸೆ. ಒಮ್ಮೆ 'ನಾನು' ಅಂದರೇನು, ನನ್ನೊಳಗಿರುವ ಭಗವಂತನೆಂದರೇನು ಎನ್ನುವ ವಸ್ತುಃಸ್ಥಿತಿ ತಿಳಿದರೆ ಹಿಂಸೆಯಾಗುವುದಿಲ್ಲ. ಅದು ತಿಳಿಯದೆ ಬದುಕುವುದು ಅಜ್ಞಾನದ ಮತ್ತು ದುಃಖದ ಬದುಕು. ಜೀವನದಲ್ಲಿ ಬರುವ ಪ್ರತಿಯೊಂದು ಸಂಗತಿಯನ್ನು-"ನಾನು ಹಿಂದೆ ಮಾಡಿದ ಕರ್ಮದ ಫಲ-ಅದನ್ನು ಭಗವಂತ ಮಾಡಿಸಿದ" ಎಂದು ತಿಳಿದುಕೊಂಡರೆ ದುಃಖವಿಲ್ಲದೆ ಆನಂದದಿಂದ ಬದುಕಬಹುದು. ನಮ್ಮ ಮನಸ್ಸೇ ನಮಗೆ ದುಃಖ ಕೊಡುವುದು. ಅದೇ ಆನಂದ ಕೊಡುವುದು. ನಮಗೆ ದುಃಖವಾಗುವುದು ನಮ್ಮ ತಿಳುವಳಿಕೆಯಿಂದಲೇ ಹೊರತು ಇನ್ನಾವುದರಿಂದಲೂ ಅಲ್ಲ. ಉದಾಹರಣೆಗೆ ಒಬ್ಬ ಶ್ರೀಮಂತ ಯಾವುದೋ ಕಾರಣದಿಂದ ತನ್ನಲ್ಲಿರುವ ಎಲ್ಲಾ ಸಂಪತ್ತನ್ನು ಕಳೆದುಕೊಳ್ಳುತ್ತಾನೆ. ಆಗ ಆತ "ನನ್ನ ಪೂರ್ವ ಜನ್ಮದ ಕರ್ಮಕ್ಕನುಗುಣವಾಗಿ ಈ ಘಟನೆ ನಡೆಯಿತು. ಎಲ್ಲವೂ ಭಗವಂತನ ಲೀಲೆ; ಕೊಡುವವನೂ ಅವನೇ, ತೆಗೆದುಕೊಳ್ಳುವವನೂ ಅವನೇ; ಪಾಲಿಸುವವನೂ ಅವನೇ; ಇದಕ್ಕಾಗಿ ನಾನೇಕೆ ಚಿಂತಿಸಬೇಕು" ಎಂದು ತಿಳಿದುಕೊಂಡರೆ ಆತ ಆನಂದದಿಂದಿರಬಹುದು. ಇದನ್ನು ಬಿಟ್ಟು ಬ್ರಹ್ಮಾಂಡವೇ ತಲೆಮೇಲೆ ಬಿದ್ದಂತೆ ವರ್ತಿಸಿದರೆ ಅದು ನಮ್ಮನ್ನು ನಾವು ಹಿಂಸಿಸಿಕೊಂಡಂತೆ. ನಾವು ಎಲ್ಲವನ್ನು ಪ್ರೇಕ್ಷಕರಾಗಿ ಕಾಣಲು ಅಭ್ಯಾಸ ಮಾಡಿಕೊಳ್ಳಬೇಕು. ಭಗವಂತನ ಅರಿವಿನೊಂದಿಗೆ ಶಾಂತವಾದ ಇಂತಹ ಬದುಕು ನಮ್ಮನ್ನು ಪರಮಪದವಾದ ಮೋಕ್ಷದತ್ತ ಕೊಂಡೊಯ್ಯಬಲ್ಲದು.

ಭಗವಂತನ ಚಿಂತನೆಯ ಇನ್ನೊಂದು ಅನುಸಂಧಾನವನ್ನು ಕೃಷ್ಣ ಮುಂದಿನ ಶ್ಲೋಕದಲ್ಲಿ ನಮ್ಮ ಮುಂದಿಟ್ಟಿದ್ದಾನೆ. ಎಚ್ಚರಿಕೆಯಿಂದ ಈ ಶ್ಲೋಕವನ್ನು ನಾವು ನೋಡಿದರೆ ನಮಗೆ ಸತ್ಯ ತಿಳಿಯುತ್ತದೆ. ನಮ್ಮಲ್ಲಿ ಎಲ್ಲರಲ್ಲೂ ಇರುವ ಒಂದು ಗೊಂದಲ ಎಂದರೆ- "ಕ್ರಿಯೆಯನ್ನು ನಾನು ಮಾಡುವುದೇ ಅಥವಾ ನನ್ನಿಂದ ಭಗವಂತ ಮಾಡಿಸುವುದೇ? ಭಗವಂತ ಮಾಡಿಸುವುದಾದರೆ ಏಕೆ ನನ್ನಿಂದ ಕೆಟ್ಟ ಕೆಲಸವನ್ನು ಮಾಡಿಸುತ್ತಾನೆ?"ಎಂಬುದು. ಈ ಪ್ರಶ್ನೆಗೆ ಕೃಷ್ಣ ಈ ಶ್ಲೋಕದಲ್ಲಿ ಅಡಕವಾಗಿ ಉತ್ತರ ಕೊಟ್ಟಿದ್ದಾನೆ. ಇಲ್ಲಿ ಹಿಂದೆ ಕೃಷ್ಣ ಹೇಳಿದ ವಿಚಾರವನ್ನು ಗಮನದಲ್ಲಿಟ್ಟುಕೊಂಡು ಈ ಶ್ಲೋಕವನ್ನು ನಾವು ನೋಡಬೇಕಾಗಿದೆ.

ಪ್ರಕೃತ್ಯೈವ ಚ ಕರ್ಮಾಣಿ ಕ್ರಿಯಮಾಣಾನಿ ಸರ್ವಶಃ ।
ಯಃ ಪಶ್ಯತಿ ತಥಾSSತ್ಮಾನಮಕರ್ತಾರಂ ಸ ಪಶ್ಯತಿ ॥೨೯॥

ಪ್ರಕೃತ್ಯಾ ಏವ ಚ ಕರ್ಮಾಣಿ ಕ್ರಿಯಮಾಣಾನಿ ಸರ್ವಶಃ ।
ಯಃ ಪಶ್ಯತಿ ತಥಾ ಆತ್ಮಾನಮ್ ಅಕರ್ತಾರಮ್ ಸಃ ಪಶ್ಯತಿ -- ಪ್ರಕೃತಿಯಿಂದಲೇ ಎಲ್ಲಾ ಕಾರ್ಯಗಳೂ ನಡೆಯುತ್ತಿವೆ[ಜೀವನ ಕರ್ಮಕ್ಕನುಗುಣವಾಗಿ ಭಗವಂತನೇ ತೊಡಗಿ ಎಲ್ಲಾ ಕಾರ್ಯಗಳಲ್ಲೂ ಮುನ್ನೆಡೆಸುತ್ತಾನೆ] ಎಂದು ತಿಳಿದವನು ಮತ್ತು ಏನು ಮಾಡುವುದಕ್ಕೂ ತಾನು ಸ್ವತಂತ್ರನಲ್ಲ[ಭಗವಂತನಿಗೆ ಇನ್ನೊಬ್ಬ ಕಾರಣ ಪುರುಷನಿಲ್ಲ] ಎಂದು ತಿಳಿದವನು 'ನಿಜವಾಗಿ ತಿಳಿದವನು'.

ಕೃಷ್ಣ ಹೇಳುತ್ತಾನೆ "ಯಾರಿಗೆ 'ನಾನು' ಮಾಡುತ್ತಿಲ್ಲ ಎಂದು ಗೊತ್ತಿದೆಯೋ ಅವನು ತಿಳಿದವನು" ಎಂದು. ಆದ್ದರಿಂದ ಮೊದಲು ನಾವು "ನಾನು ಮಾಡುತ್ತಿದ್ದೇನೆ" ಎನ್ನುವ ಅಹಂಕಾರವನ್ನು ಬಿಟ್ಟುಬಿಡಬೇಕು. ನಾನು ಮಾಡುತ್ತಿದ್ದೇನೆ ಎನ್ನುವುದು ಕೇವಲ ವ್ಯಾವಹಾರಿಕ ಸತ್ಯವೇ ಹೊರತು ಪಾರಮಾರ್ಥಿಕ ಸತ್ಯವಲ್ಲ. ಉದಾಹರಣೆಗೆ: "ನಾನು ಮಾತನಾಡುತ್ತಿದ್ದೇನೆ". ಇಲ್ಲಿ ನಾನು ಮಾತನಾಡಬೇಕಾದರೆ ಮೊದಲು ನಾನು ಮೂಗನಾಗಿರಬಾರದು. ಅದಕ್ಕೆ ಸರಿಯಾದ ಅಂಗಾಂಗವಿರುವ ಮಾನವ ಶರೀರವಿರಬೇಕು. ಮಾತನಾಡಬೇಕಾದರೆ ನನ್ನ ಮನಸ್ಸು ವಿಷಯಗಳನ್ನು ಸಮಯಕ್ಕೆ ಸರಿಯಾಗಿ ಯೋಚಿಸಿ ಸಂದೇಶವನ್ನು ರವಾನಿಸಬೇಕು. ಅಂದರೆ ಇದಕ್ಕೆ ಸರಿಯಾದ ಮೆದುಳಿನ ಶಕ್ತಿ ನನಗೆ ಬೇಕು. ಮಾತನಾಡುವ ಧೈರ್ಯ ನನಗೆ ಬೇಕು. ಈಗ ನಮಗೆ ನಾವೇ ಪ್ರಶ್ನೆ ಹಾಕಿಕೊಳ್ಳೋಣ: ನನಗೆ ಮಾತನಾಡಬಲ್ಲ ಮಾನವ ದೇಹವನ್ನು ಕೊಟ್ಟವನ್ಯಾರು? ನನಗೆ ಯೋಚಿಸಬಲ್ಲ ಮೆದುಳನ್ನು ವಿನ್ಯಾಸಗೊಳಿಸಿ ಕರುಣಿಸಿದವನ್ಯಾರು? ಸಮಯಕ್ಕೆ ಸರಿಯಾಗಿ ಈ ಮೆದುಳಿನಿಂದ ಸಂದೇಶವನ್ನು ರವಾನಿಸಿದವನ್ಯಾರು? ಮಾತನಾಡುವ ಅದ್ಭುತ ಕಲೆಯನ್ನು ನನಗೆ ದಯಪಾಲಿಸಿದವನ್ಯಾರು? ಈ ಎಲ್ಲಾ ಪ್ರಶ್ನೆಯಿಂದ ನಮಗೆ ತಿಳಿಯುವುದೇನೆಂದರೆ: "ನನ್ನೊಳಗಿರುವ ಭಗವಂತ ನುಡಿಸಿದ-ನಾನು ನುಡಿದೆ" ಎನ್ನುವ ಸತ್ಯ. ಇದನ್ನೇ ಇಲ್ಲಿ ಭಗವಂತ ವಿವರಿಸುತ್ತಾ ಹೇಳುತ್ತಾನೆ "ಪ್ರಕೃತ್ಯೈವ ಚ ಕರ್ಮಾಣಿ ಕ್ರಿಯಮಾಣಾನಿ ಸರ್ವಶಃ" ಎಂದು. ಅವರವರ ಜೀವಪ್ರಕೃತಿ(ಜೀವ ಸ್ವಭಾವ)ಗೆ ಅನುಗುಣವಾಗಿ, ಪ್ರಕೃತಿ(ತ್ರಿಗುಣಗಳ) ಪ್ರಭಾವದಿಂದ, ಪ್ರಕೃತಿಪುರುಷರು(ಲಕ್ಷ್ಮೀನಾರಾಯಣರು) ನಮ್ಮಿಂದ ಕರ್ಮವನ್ನು ಮಾಡಿಸುತ್ತಾರೆ. ಆದ್ದರಿಂದ ಜೀವನಿಗೆ ಅನಾಧಿನಿತ್ಯವಾಗಿ ಬಂದ ಜೀವಸ್ವಭಾವಕ್ಕನುಗುಣವಾಗಿ ಆತನ ದೇಹ ಸೃಷ್ಟಿ; ಅದಕ್ಕನುಗುಣವಾಗಿ ಆತನ ಮೇಲೆ ವಾತಾವರಣದಲ್ಲಿನ ತ್ರಿಗುಣಗಳ ಪ್ರಭಾವ; ತ್ರಿಗುಣಗಳ ಪ್ರಭಾವದಂತೆ ಆತನ ಎಲ್ಲಾ ವಿಧದ ಕರ್ಮ. ಇದೆಲ್ಲವನ್ನೂ ಮಾಡಿಸುವವ- ಸರ್ವದೇವತೆಗಳ ಅಧಿಪತಿಯಾದ, ಲಕ್ಷ್ಮೀ ಸಮೇತನಾದ ನಾರಾಯಣ.

ಯದಾ ಭೂತಪೃಥಗ್ ಭಾವಮೇಕಸ್ಥಮನುಪಶ್ಯತಿ ।
ತತ ಏವ ಚ ವಿಸ್ತಾರಂ ಬ್ರಹ್ಮ ಸಂಪದ್ಯತೇ ತದಾ ॥೩೦॥

ಯದಾ ಭೂತ ಪೃಥಕ್ ಭಾವಮ್ ಏಕಸ್ಥಮ್ ಅನುಪಶ್ಯತಿ ।
ತತಃ ಏವ ಚ ವಿಸ್ತಾರಂ ಬ್ರಹ್ಮ ಸಂಪದ್ಯತೇ ತದಾ –ಬಗೆಬಗೆಯ ಜೀವರಾಶಿ ಒಬ್ಬ ಭಗವಂತನಲ್ಲಿ ನೆಲೆಸಿದೆ ಎಂದು, ಅವನಿಂದಲೇ ಈ ಬಗೆಬಗೆಯ ಬಿತ್ತರ ಎಂದು ತಿಳಿದಾಗ ಭಗವಂತನನ್ನೇ ಸೇರುತ್ತಾನೆ.

ಜೀವ ಅನಾಧಿನಿತ್ಯ. ಸೃಷ್ಟಿಯಾಗುವುದು, ಸಂಹಾರವಾಗುವುದು ಕೇವಲ ಕಾಣುವ ರೂಪ ಅಷ್ಟೆ. ಜೀವಜಾತಗಳು ಒಂದೊಂದೂ ಪೃಥಕ್ ಭಾವ. ಯಾವ ಎರಡು ಜೀವಜಾತವೂ ನೂರಕ್ಕೆ ನೂರು ಸದೃಶವಾಗಿಲ್ಲ. ಈ ಅನೇಕ ಜೀವ ಸಮುದಾಯ ಏಕನಾದ ಭಗವಂತನಲ್ಲಿದೆ. ಸೃಷ್ಟಿ ಕಾಲದಲ್ಲಿ ಭಗವಂತನ ಉದರದಿಂದ ಹೊರ ಬಂದು ಆಕಾರ ಪಡೆಯುವ ಜೀವ ಜಾತಗಳು ಪ್ರಳಯ ಕಾಲದಲ್ಲಿ ಮರಳಿ ಸೂಕ್ಷ್ಮ ರೂಪದಲ್ಲಿ ಭಗವಂತನ ಉದರವನ್ನು ಸೇರುತ್ತವೆ. ಇದನ್ನು ನಾವು ವಸ್ತುಃಸ್ಥಿತಿಗೆ ಅನುಗುಣವಾಗಿ ಗ್ರಹಣ ಮಾಡಬೇಕು. ಯಾರು ಈ ಸತ್ಯವನ್ನು ಗ್ರಹಣ ಮಾಡಬಲ್ಲನೋ ಆತ ಮೋಕ್ಷವನ್ನು ಪಡೆಯಬಲ್ಲ.

ಅನಾದಿತ್ವಾನ್ನಿರ್ಗುಣತ್ವಾತ್ ಪರಮಾತ್ಮಾSಯಮವ್ಯಯಃ ।
ಶರೀರಸ್ಥೋSಪಿ ಕೌಂತೇಯ ನ ಕರೋತಿ ನ ಲಿಪ್ಯತೇ ॥೩೧॥

ಅನಾದಿತ್ವಾತ್ ನಿರ್ಗುಣತ್ವಾತ್ ಪರಮ ಆತ್ಮಾ ಅಯಮ್ ಅವ್ಯಯಃ ।
ಶರೀರಸ್ಥಃ ಅಪಿ ಕೌಂತೇಯ ನ ಕರೋತಿ ನ ಲಿಪ್ಯತೇ --ಕೌಂತೇಯಾ, ಪರಮಾತ್ಮ ಎಂದೂ ಹುಟ್ಟದವನು; ಗುಣಗಳು ಅಂಟದವನು; ಅದರಿಂದ ಅವನಿಗೆ ಅಳಿವೂ ಇಲ್ಲ. ಅವನು ದೇಹದೊಳಗಿದ್ದೂ ಏನನ್ನೂ ಮಾಡುವುದಿಲ್ಲ; ಏನನ್ನೂ ಅಂಟಿಸಿಕೊಳ್ಳುವುದಿಲ್ಲ.[ಅಳಿವಿರದ ಈ ಪರಮಾತ್ಮ ಸಂಸಾರಿ ಜೀವನಲ್ಲ; ಜಡದ ಮಾತೇನು! ಅವನು ಎಲ್ಲವನ್ನೂ ಮಾಡುತ್ತಾನೆ; ಏನನ್ನೂ ಅಂಟಿಸಿಕೊಳ್ಳುವುದಿಲ್ಲ.]

ನಿರ್ವಿಕಾರನಾಗಿರುವ ಏಕಮೇವ ವಸ್ತು ಎಂದರೆ ಭಗವಂತ. ಆತ ಎಂದೂ ಯಾವ ಕಾರಣ ವಿಶೇಷದಿಂದ ಕೂಡಾ ಹುಟ್ಟಿಲ್ಲ. ಭಗವಂತ ತ್ರೈಗುಣ್ಯವರ್ಜಿತ. ಇದರಿಂದ ಆತ ಎಂದೂ ಬದಲಾವಣೆಗೆ, ವಿಕಾರಕ್ಕೆ ಒಳಪಡುವುದಿಲ್ಲ. ಆತ ಎಲ್ಲಾ ಜೀವರೊಳಗೆ ಬಿಂಬರೂಪನಾಗಿದ್ದರೂ ಕೂಡಾ ಆತನಿಗೆ ದೇಹದ ಬದ್ಧತೆ ಇಲ್ಲ. ಆತ ಎಲ್ಲವನ್ನು ನಮ್ಮಿಂದ ಮಾಡಿಸುತ್ತಾನೆ ಆದರೆ ಏನನ್ನೂ ಅಂಟಿಸಿಕೊಳ್ಳುವುದಿಲ್ಲ. ಆತ ನಿರ್ಲಿಪ್ತನಾಗಿ ಎಲ್ಲವನ್ನೂ ಮಾಡುತ್ತಾನೆ ಆದರೆ ಯಾವುದರ ಲೇಪವೂ ಆತನಿಗಿಲ್ಲ. ಇದು ಯಾವ ರೀತಿ ಎಂದು ಅರ್ಥ ಮಾಡಿಕೊಳ್ಳುವುದಕ್ಕೆ- ಕೃಷ್ಣ ಒಂದು ಉದಾಹರಣೆಯನ್ನು ಕೊಟ್ಟು ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಯಥಾ ಸರ್ವಗತಂ ಸೌಕ್ಷ್ಮ್ಯಾದಾಕಾಶಂ ನೋಪಲಿಪ್ಯತೇ।
ಸರ್ವತ್ರಾವಸ್ಥಿತೋ ದೇಹೇ ತಥಾSSತ್ಮಾ ನೋಪಲಿಪ್ಯತೇ ॥೩೨॥

ಯಥಾ ಸರ್ವಗತಮ್ ಸೌಕ್ಷ್ಮ್ಯಾತ್ ಆಕಾಶಮ್ ನ ಉಪಲಿಪ್ಯತೇ ।
ಸರ್ವತ್ರ ಅವಸ್ಥಿತಃ ದೇಹೇ ತಥಾ ಆತ್ಮಾ ನ ಉಪಲಿಪ್ಯತೇ –ಆಕಾಶ ಎಲ್ಲೆಡೆ ತುಂಬಿದ್ದರೂ ಏತಕ್ಕೂ ತಡೆಯಾಗದಷ್ಟು ನವುರಾದ್ದರಿಂದ ಏತರಿಂದಲೂ ಅಂಟಿಸಿಕೊಳ್ಳುವುದಿಲ್ಲ ಹೇಗೋ ಹಾಗೇ- ಪರಮಾತ್ಮ ಕೂಡಾ ಎಲ್ಲಾ ದೇಹಗಳಲ್ಲಿ ತುಂಬಿದ್ದರೂ ಅಂಟಿಕೊಳ್ಳುವುದಿಲ್ಲ.

ಎಲ್ಲಾ ಕಡೆ ಆಕಾಶವಿದೆ. ಅದಿಲ್ಲದ ಸ್ಥಳವಿಲ್ಲ. ಇಂತಹ ಆಕಾಶ ಎಲ್ಲೆಡೆ ಇದ್ದೂ ಹೇಗೆ ಏನನ್ನೂ ಅಂಟಿಸಿಕೊಳ್ಳದೇ ಇರುತ್ತದೋ- ಹಾಗೇ ಭಗವಂತ ಎಲ್ಲಾ ದೇಹದಲ್ಲಿದ್ದರೂ ಏನನ್ನೂ ಅಂಟಿಸಿಕೊಳ್ಳದೆ ನಿರ್ಲಿಪ್ತನಾಗಿದ್ದಾನೆ.

ಯಥಾ ಪ್ರಕಾಶಯತ್ಯೇಕಃ ಕೃತ್ಸ್ನಂ ಲೋಕಮಿಮಂ ರವಿಃ ।
ಕ್ಷೇತ್ರಂ ಕ್ಷೇತ್ರೀ ತಥಾ ಕೃತ್ಸ್ನಂ ಪ್ರಕಾಶಯತಿ ಭಾರತ ॥೩೩॥

ಯಥಾ ಪ್ರಕಾಶಯತಿ ಏಕಃ ಕೃತ್ಸ್ನಮ್ ಲೋಕಮ್ ಇಮಮ್ ರವಿಃ।
ಕ್ಷೇತ್ರಮ್ ಕ್ಷೇತ್ರೀ ತಥಾ ಕೃತ್ಸ್ನಮ್ ಪ್ರಕಾಶಯತಿ ಭಾರತ -ಭಾರತಾ, ಒಬ್ಬ ಸೂರ್ಯ ಇಡಿಯ ಈ ಭೂಮಿಯನ್ನು ಬೆಳಗುವಂತೆ 'ಕ್ಷೇತ್ರಜ್ಞ'ನಾದ ಭಗವಂತನೊಬ್ಬನೇ ಇಡಿಯ ವಿಶ್ವವೆಂಬ 'ಕ್ಷೇತ್ರ' ವನ್ನು ಬೆಳಗುತ್ತಾನೆ.

ಏಕ ಸೂರ್ಯ ಹೇಗೆ ಇಡೀ ವಿಶ್ವವನ್ನು ಬೆಳಗಿಸುತ್ತಾನೋ ಹಾಗೇ, ಇಡೀ ಕ್ಷೇತ್ರವನ್ನು ಕ್ಷೇತ್ರಜ್ಞನಾದ ಭಗವಂತ ಬೆಳಗಿಸುತ್ತಾನೆ. ನಾವು ಮೊದಲು ಭಗವಂತನ ಬೆಳಕನ್ನು(ಜ್ಞಾನವನ್ನು) ತಿಳಿಯಬೇಕು. ಆಗ ನಮ್ಮೊಳಗಿನ ಬೆಳಕು ನಮಗೆ ಅರ್ಥವಾಗುತ್ತದೆ.

ಕ್ಷೇತ್ರಕ್ಷೇತ್ರಜ್ಞಯೋರೇವಮಂತರಂ ಜ್ಞಾನಚಕ್ಷುಷಾ ।
ಭೂತಪ್ರಕೃತಿಮೋಕ್ಷಂ ಚ ಯೇ ವಿದುರ್ಯಾಂತೀ ತೇ ಪರಮ್ ॥೩೪॥

ಕ್ಷೇತ್ರ ಕ್ಷೇತ್ರಜ್ಞಯೋಃ ಏವಮ್ ಅಂತರಮ್ ಜ್ಞಾನೊ ಚಕ್ಷುಷಾ ।
ಭೂತ ಪ್ರಕೃತಿ ಮೋಕ್ಷಮ್ ಚ ಯೇ ವಿದುಃ ಯಾಂತಿ ತೇ ಪರಮ್ – ಕ್ಷೇತ್ರ-ಕ್ಷೇತ್ರಜ್ಞರೊಳಗಣ ಈ ಅಂತರವನ್ನು, ಪಂಚಭೂತಗಳಿಂದ ಮತ್ತು ಪ್ರಕೃತಿಯಿಂದ [ಜೀವರಿಗೆ ಚೇತನ ಪ್ರಕೃತಿಯಿಂದ] ಬಿಡುಗಡೆಗೆ ಕಾರಣವಾದ ತಿಳಿವಿನ ದಾರಿಯನ್ನು ತುಳಿದವರು ಪರಮಾತ್ಮನನ್ನು ಪಡೆಯುತ್ತಾರೆ.

ಈ ಶ್ಲೋಕ ಈ ಅಧ್ಯಾಯದ ಉಪಸಂಹಾರ. ಕ್ಷೇತ್ರ ಅಂದರೇನು, ಕ್ಷೇತ್ರಜ್ಞ ಅಂದರೇನು, ಕ್ಷೇತ್ರ ಮತ್ತು ಕ್ಷೇತ್ರಜ್ಞರ ನಡುವಿನ ವ್ಯತ್ಯಾಸವೇನು; ಜೀವಜಾತ ಜಡದಿಂದ ಬಿಡುಗಡೆ ಹೊಂದಲು ಇರಬೇಕಾದ ಮೋಕ್ಷ ಸಾಧಕ ಗುಣಗಳು-ಇವೆಲ್ಲವನ್ನು ಅರಿತು ಆಚರಣೆಗೆ ತಂದು ಬದುಕುವವರು ಸರ್ವಶ್ರೇಷ್ಠನಾದ ಭಗವಂತನನ್ನು ಸೇರುತ್ತಾರೆ.

ಇತಿ ತ್ರಯೋದಶೋಽಧ್ಯಾಯಃ
ಹದಿಮೂರನೆಯಯ ಅಧ್ಯಾಯ ಮುಗಿಯಿತು



# ಅಧ್ಯಾಯ ಹದಿನಾಲ್ಕು

ಗೀತೆಯಲ್ಲಿ ಇಲ್ಲಿಯ ತನಕ ಅಲ್ಲಲ್ಲಿ ಸಾಧನೆಯ ಮಾತು ಬಂದಿದ್ದರೂ ಕೂಡಾ, ಭಗವಂತನ ಸ್ವರೂಪದ ಮಹಿಮೆಯ ಮಾತು ಹೆಚ್ಚಾಗಿ ಬಂದಿದೆ. ಇಂತಹ ಭಗವಂತನ ಉಪಾಸನೆಯ ಮುಖಗಳ ವರ್ಣನೆಯನ್ನು ನಾವು ಇನ್ನು ಮುಂದೆ ಕಾಣಬಹುದು. ಹನ್ನೆರಡನೇ ಅಧ್ಯಾಯದಲ್ಲಿ(ಶ್ಲೋ-೦೫) ಕೃಷ್ಣ "ಶ್ರೀತತ್ವದ ಉಪಾಸನೆ ತುಂಬಾ ಕಷ್ಟ, ಇದು ನೇರ ದಾರಿಯನ್ನು ಬಿಟ್ಟು ಬಳಸುದಾರಿಯಲ್ಲಿ ಭಗವಂತನೆಡೆಗೆ ಪಯಣಿಸಿದಂತೆ, ಸಾಧಕರು ಇದನ್ನು ಬಹಳ ಕಷ್ಟದಿಂದ ಸಾಧಿಸಬೇಕು"-ಎನ್ನುವ ಎಚ್ಚರವನ್ನು ಕೊಟ್ಟ. ಹದಿಮೂರನೇ ಅಧ್ಯಾಯದಲ್ಲಿ(ಶ್ಲೋ-೨೬)- "ಸ್ಥಿರ ಮತ್ತು ಚರ ಜೀವಿಗಳಲ್ಲಿ ಯಾವುದು ಹುಟ್ಟಿದರೂ ಅದು ಕ್ಷೇತ್ರ[ಶ್ರೀತತ್ವ] ಮತ್ತು ಕ್ಷೇತ್ರಜ್ಞ[ಭಗವಂತ]ರ ಸಂಯೋಗದಿಂದಲೇ"-ಎಂದು ಹೇಳಿದ. ಸಾಮಾನ್ಯವಾಗಿ ಸೃಷ್ಟಿಯ ಮಾತು ಬಂದಾಗ 'ಭಗವಂತ ಸೃಷ್ಟಿ ಮಾಡಿದ' ಎನ್ನುತ್ತೇವೆ. ಇಲ್ಲಿ ಎಲ್ಲಿಯೂ ಲಕ್ಷ್ಮಿಯ ಮಾತು ಬರುವುದಿಲ್ಲ. ಆದರೆ ಹಿಂದಿನ ಅಧ್ಯಾಯದಲ್ಲಿ ಕೃಷ್ಣ ಸ್ಪಷ್ಟವಾಗಿ ಹೇಳಿದ: "ಈ ಸೃಷ್ಟಿ ಲಕ್ಷ್ಮೀನಾರಾಯಣರ ದಾಂಪತ್ಯದ ಫಲ" ಎಂದು. ಈ ಕಾರಣದಿಂದ ಸೃಷ್ಟಿ ಮೂಲದ ಚಿಂತನೆಯಲ್ಲಿ ಲಕ್ಷ್ಮೀನಾರಾಯಣರನ್ನು ಒಟ್ಟಿಗೆ ಸ್ತುತಿಸುವುದು ಶ್ರೇಷ್ಠ. ಲಕ್ಷ್ಮಿಯನ್ನು ಸ್ತುತಿಸುವಾಗ ಜೊತೆಗೆ ನಾರಾಯಣನನ್ನು ಸ್ತುತಿಸಿ ಲಕ್ಷ್ಮಿಯ ಸ್ತೋತ್ರ ಮಾಡಬೇಕು ಎನ್ನುವುದನ್ನು ಆಚಾರ್ಯರು ದ್ವಾದಶ ಸ್ತೋತ್ರದಲ್ಲಿ ಸ್ಪಷ್ಟವಾಗಿ ತೋರಿಸಿದ್ದಾರೆ. ಅಲ್ಲಿ 'ಶ್ರೀಸ್ತುತಿ' ಎನ್ನುವ ಲಕ್ಷ್ಮೀದೇವಿಯ ಸ್ತುತಿ ಈ ರೀತಿ ಹೇಳುತ್ತದೆ:

ವಿಶ್ವಸ್ಥಿತಿಪ್ರಳಯಸರ್ಗಮಹಾವಿಭೂತಿ ವೃತ್ತಿಪ್ರಕಾಶನಿಯಮಾವೃತಿ ಬಂಧಮೋಕ್ಷಾಃ ।
ಯಸ್ಯಾ ಅಪಾಂಗಲವಮಾತ್ರತ ಊರ್ಜಿತಾ ಸಾ ಶ್ರೀಃ ಯತ್ಕಟಾಕ್ಷಬಲವತ್ಯಜಿತಂ ನಮಾಮಿ ॥ ೧॥

ಅಂದರೆ "ಯಾರ ಕಟಾಕ್ಷದ ಬಲದಿಂದ ಇಡಿಯ ಸೃಷ್ಟಿ-ಸ್ಥಿತಿ-ಸಂಹಾರವನ್ನು ಲಕ್ಷ್ಮಿ ಮಾಡುತ್ತಾಳೋ, ಅಂತಹ ಲಕ್ಷ್ಮಿಯ ಪತಿಯಾದ ನಾರಾಯಣನಿಗೆ ನಮಸ್ಕಾರ" ಎಂದು. ಇಲ್ಲಿ ಲಕ್ಷ್ಮಿಯನ್ನು ಒಂದು ಸ್ತೋತ್ರದಲ್ಲಿ ಪೂರ್ಣ ವರ್ಣನೆ ಮಾಡಿ, ಅಂತಹ ಲಕ್ಷ್ಮಿಯ ಪತಿಯಾದ ನಾರಾಯಣನಿಗೆ ನಮಸ್ಕಾರ ಎಂದು ಹೇಳಿದ್ದಾರೆ. ಆದ್ದರಿಂದ ಲಕ್ಷ್ಮೀನಾರಾಯಣರ ಸ್ತುತಿಯೇ ಲಕ್ಷ್ಮಿಸ್ತುತಿ, ಹೊರತು ಕೇವಲ ಲಕ್ಷ್ಮಿ ಸ್ತುತಿ ಅಲ್ಲ. ಇದಕ್ಕೆ ಮೂಲ-ಗೀತೆಯ ಹನ್ನೆರಡು, ಹದಿಮೂರು ಮತ್ತು ಹದಿನಾಲ್ಕನೇ ಅಧ್ಯಾಯ. ಹನ್ನೆರಡನೇ ಅಧ್ಯಾಯದಲ್ಲಿ ಕೇವಲ ಲಕ್ಷ್ಮಿ ಉಪಾಸನೆ ಮಾಡಿದರೆ ಖಂಡಿತವಾಗಿ ಆಕೆ ಒಲಿಯಳು ಎನ್ನುವ ಎಚ್ಚರವಿದ್ದರೆ, ಹದಿಮೂರನೇ ಅಧ್ಯಾಯದಲ್ಲಿ ಈ ಜಗತ್ತು ಲಕ್ಷ್ಮೀನಾರಾಯಣರ ಸಂಯೋಗದಿಂದ ರಚನೆಯಾಯಿತು- ಆದ್ದರಿಂದ ನಾವೆಲ್ಲರೂ ಅವರ ಮಕ್ಕಳು ಎನ್ನುವ ಸಂದೇಶವಿದೆ. ಭಗವಂತನ ಜೊತೆಗೆ ಸೃಷ್ಟಿ ಪ್ರಕ್ರಿಯೆಯಲ್ಲಿ ಲಕ್ಷ್ಮಿಯ ಅನುಸಂಧಾನ ಹೇಗೆ ಅನ್ನುವುದನ್ನು ಹದಿನಾಲ್ಕನೇ ಅಧ್ಯಾಯ ವಿವರಿಸುತ್ತದೆ. ಲಕ್ಷ್ಮಿ, ಶ್ರೀ-ಭೂ-ದುರ್ಗ ಈ ಮೂರು ರೂಪದಲ್ಲಿ ಸತ್ವ-ರಜಸ್ಸು-ತಮೋಗುಣಗಳ ನಿಯಾಮಕ ಶಕ್ತಿಯಾದ್ದರಿಂದ-ಅವಳ ಮಕ್ಕಳು ಸಾತ್ವಿಕರು-ರಾಜಸರು-ತಾಮಸರು ಎನ್ನುವ ಮೂರು ಬಗೆ. ಈ ವಿಚಾರವನ್ನು ಮೊತ್ತಮೊದಲ ಬಾರಿ ಈ ಅಧ್ಯಾಯದಲ್ಲಿ ಹೇಳಲಾಗಿದೆ. ಹಿಂದಿನ ಯಾವ ಅಧ್ಯಾಯದಲ್ಲೂ ಕೂಡಾ ತ್ರೈವಿದ್ಯರ ವಿವರ ಇಷ್ಟು ಸ್ಪಷ್ಟವಾಗಿ ಬಂದಿಲ್ಲ. ನಾವು ಈ ತ್ರಿಗುಣಗಳ ವಿಶ್ಲೇಷಣೆ ಮಾಡಿ, ನಮ್ಮಲ್ಲಿರುವ ರಾಜಸ ಮತ್ತು ತಾಮಸ ಅಂಶವನ್ನು ತಿದ್ದಿಕೊಂಡು, ಹೇಗೆ ಸಾತ್ವಿಕ ದಾರಿಯಲ್ಲಿ ಸಾಧನೆಯನ್ನು ಮಾಡಬಹುದು ಎನ್ನುವ ಅಂಶವನ್ನು ಈ ಅಧ್ಯಾಯದಲ್ಲಿ ಕಾಣಬಹುದು.

ಭಗವಾನುವಾಚ ।

ಪರಂ ಭೂಯಃ ಪ್ರವಕ್ಷ್ಯಾಮಿ ಜ್ಞಾನಾನಾಂ ಜ್ಞಾನಮುತ್ತಮಮ್ ।

ಯಜ್ ಜ್ಞಾತ್ವಾ ಮುನಯಃ ಸರ್ವೇ ಪರಾಂ ಸಿದ್ಧಿಮಿತೋ ಗತಾಃ॥೧॥

ಭಗವಾನ್ ಉವಾಚ-ಭಗವಂತ ಹೇಳಿದನು:

ಪರಮ್ ಭೂಯಃ ಪ್ರವಕ್ಷ್ಯಾಮಿ ಜ್ಞಾನಾನಾಮ್ ಜ್ಞಾನಮ್ ಉತ್ತಮಮ್ ।

ಯತ್ ಜ್ಞಾತ್ವಾ ಮುನಯಃ ಸರ್ವೇ ಪರಾಮ್ ಸಿದ್ಧಿಮ್ ಇತಃ ಗತಾಃ –ತಿಳಿಯಬೇಕಾದ ಸಂಗತಿಗಳಲ್ಲಿ ಹಿರಿದಾದ ತಿಳಿವನ್ನು ಇನ್ನಷ್ಟು ಹೇಳುತ್ತೇನೆ; ಎಲ್ಲಾ ಮುನಿಗಳು ಇದನ್ನರಿತು ಇಲ್ಲಿಂದ ಪರಮಪದವನ್ನೈದಿದರು.

ಕೃಷ್ಣ ಹೇಳುತ್ತಾನೆ: "ಇನ್ನೂ ಹೇಳುತ್ತೇನೆ" ಎಂದು. ಇದು ಬಹಳ ಮುಖ್ಯವಾದ ಮಾತು. ಸಾಮಾನ್ಯವಾಗಿ ಶಿಷ್ಯರು ಒತ್ತಾಯ ಮಾಡಿದರೂ ಗುರುಗಳು ಹೇಳುವುದಿಲ್ಲ. ಗುರುಗಳಿಗೆ ಶಿಷ್ಯನ ಜ್ಞಾನ ತೃಷೆಯನ್ನು ಕಂಡು ಹೇಳಬೇಕು ಅನ್ನಿಸಬೇಕು ಮತ್ತು ಅವರು ಖುಷಿಯಿಂದ ಹೇಳಬೇಕು. ಆಗ ಶಿಷ್ಯನಿಗೆ ಆ ವಿದ್ಯೆ ಫಲಿಸುತ್ತದೆ. ಹೀಗೆ ಜ್ಞಾನ ತೃಷೆಯನ್ನು ಕಂಡು ಖುಷಿಯಿಂದ ಗುರು ಹೇಳುವ ಜ್ಞಾನ ನಿಜವಾದ ಜ್ಞಾನ. ಇಲ್ಲಿ ಕೃಷ್ಣ ತಾನಾಗಿಯೇ ಅರ್ಜುನನಿಗೆ ಅಪೂರ್ವವಾದ ಜ್ಞಾನವನ್ನು ಹೇಳುತ್ತಿದ್ದಾನೆ. ಕೃಷ್ಣ ಹೇಳುತ್ತಾನೆ: "ಹಿಂದೆ ಹೇಳಿದ ಕ್ಷೇತ್ರ(ಪ್ರಕೃತಿ-ಲಕ್ಷ್ಮಿ) ಮತ್ತು ಕ್ಷೇತ್ರಜ್ಞ(ನಾರಾಯಣ)ರ ವಿಚಾರವನ್ನು ಇನ್ನೂ ವಿವರವಾಗಿ ಹೇಳುತ್ತೇನೆ. ಏಕೆಂದರೆ ಅದು ತಿಳಿದುಕೊಳ್ಳಬೇಕಾದ ವಿಚಾರದಲ್ಲೇ ಅತ್ಯಂತ ಮುಖ್ಯವಾದ ವಿಚಾರ" ಎಂದು. ಈ ಜಗತ್ತಿನ ಸೃಷ್ಟಿಯ ಹಿಂದೆ ತಂದೆ-ತಾಯಿಯಾಗಿ ಲಕ್ಷ್ಮೀ-ನಾರಾಯಣರಿದ್ದಾರೆ. ಆದ್ದರಿಂದ ಕೇವಲ ತಂದೆಯ ಸ್ಮರಣೆ, ಅಥವಾ ಕೇವಲ ತಾಯಿಯ ಸ್ಮರಣೆ ಮಾಡುವುದಕ್ಕಿಂತ, ತಂದೆ-ತಾಯಿಯರ ಸ್ಮರಣೆಯನ್ನು ತಿಳಿದು ಮಾಡುವುದು ಒಳಿತು. ಕೃಷ್ಣ ಹೇಳುತ್ತಾನೆ: "ಈ ವಿಚಾರವನ್ನು ಇನ್ನೂ ವಿಸ್ತಾರವಾಗಿ ನಿನಗೆ ಹೇಳುತ್ತೇನೆ. ಏಕೆಂದರೆ ಇದು ಒಬ್ಬ ಮೋಕ್ಷ ಸಾಧನೆ ಮಾಡುವ ವ್ಯಕ್ತಿ ತಿಳಿದುಕೊಳ್ಳಲೇಬೇಕಾದ ವಿಷಯ" ಎಂದು.

ಲಕ್ಷ್ಮೀ-ನಾರಾಯಣರನ್ನು ಸೃಷ್ಟಿ ಮೂಲದಲ್ಲಿ ಚಿಂತನೆ ಮಾಡದೇ ಮೋಕ್ಷ ಸಾಧನೆ ಅಸಾಧ್ಯ. "ಈ ಸಾಧನಾ ಭೂಮಿಯಲ್ಲಿ ಹುಟ್ಟಿಬಂದು ಬ್ರಹ್ಮಸಾಕ್ಷಾತ್ಕಾರ ಪಡೆದ ಮುನಿಗಳೂ ಕೂಡಾ, ಇದನ್ನು ತಿಳಿದೇ ಜೀವನದ ಪರಮ ಸಿದ್ಧಿಯಾದ ಮೋಕ್ಷವನ್ನು ಪಡೆದರು" ಎನ್ನುತ್ತಾನೆ ಕೃಷ್ಣ. ಇದನ್ನೇ ಮುಂದಿನ ಶ್ಲೋಕದಲ್ಲಿ ಬಹಳ ಸ್ಪಷ್ಟವಾಗಿ ವಿವರಿಸಲಾಗಿದೆ.

ಇದಂ ಜ್ಞಾನಮುಪಾಶ್ರಿತ್ಯ ಮಮ ಸಾಧರ್ಮ್ಯಮಾಗತಾಃ ।

ಸರ್ಗೇಽಪಿ ನೋಪಜಾಯಂತೇ ಪ್ರಳಯೇ ನ ವ್ಯಥಂತಿ ಚ ॥೨॥

ಇದಮ್ ಜ್ಞಾನಮ್ ಅಪಾಶ್ರಿತ್ಯ ಮಮ ಸಾಧರ್ಮ್ಯಮ್ ಆಗತಾಃ ।

ಸರ್ಗೇ ಅಪಿ ನ ಉಪಜಾಯಂತೇ ಪ್ರಳಯೇ ನ ವ್ಯಥಂತಿ ಚ –ಈ ತಿಳಿವು ಗಳಿಸಿ ದುಗುಡ ದೂರರಾಗಿ ನನ್ನನ್ನು ಹೋಲುವವರು ಸೃಷ್ಟಿಕಾಲದಲ್ಲಿ ಹುಟ್ಟುವುದಿಲ್ಲ; ಪ್ರಳಯಕಾಲದಲ್ಲಿ ನೋಯುವುದಿಲ್ಲ.

ಈ ಶ್ಲೋಕದಲ್ಲಿ ಬಂದಿರುವ 'ಅಪಾಶ್ರಿತ್ಯ' ಎನ್ನುವ ಪದ ವಿಶೇಷ ಅರ್ಥವನ್ನು ಕೊಡುವ ಪದ. 'ಅನ್ಯತ್ ಸರ್ವಂ ಅಪಾಹಾಯಾSಶ್ರಯಣಂ-ಅಪಾSಶ್ರಯಣಃ' "ಇನ್ಯಾರೂ ಇಲ್ಲ-ನೀನೇ ನನಗೆ ಆಶ್ರಯ" ಎಂದು ಭಗವಂತನಲ್ಲಿ ಆಶ್ರಯ ಹೊಂದುವುದನ್ನು ಇಲ್ಲಿ 'ಅಪಾಶ್ರಿತ್ಯ' ಎಂದಿದ್ದಾರೆ. ದ್ವಾದಶ ಸ್ತೋತ್ರದಲ್ಲಿ ಹೇಳುವಂತೆ:

ಕುರು ಭುಂಕ್ಷ್ವ ಚ ಕರ್ಮ ನಿಜಂ ನಿಯತಂ ಹರಿಪಾದವಿನಮ್ರಧಿಯಾ ಸತತಂ |
ಹರಿರೇವ ಪರೋ ಹರಿರೇವ ಗುರುಃ ಹರಿರೇವ ಜಗತ್ಪಿತೃಮಾತೃಗತಿಃ || ೧||

ಇದು 'ಅಪಾಶ್ರಿತ್ಯ' ಪದದ ಮೂಲ ಅರ್ಥವನ್ನು ಹೇಳುತ್ತದೆ. ಇಲ್ಲಿ ಕೃಷ್ಣ ಹೇಳುತ್ತಾನೆ: "ಲಕ್ಷ್ಮೀ-ನಾರಾಯಣರು ಜಗತ್ತಿನ ತಂದೆ ತಾಯಿ ಅನ್ನುವ ಜ್ಞಾನದಿಂದ ನನ್ನನ್ನು ಉಪಾಸನೆ ಮಾಡುವವರು, ನನ್ನಂತೆ ದಿವ್ಯ ಸ್ವಭಾವವನ್ನು ಪಡೆಯುತ್ತಾರೆ" ಎಂದು. ಇಂತವರು ಸರ್ವದೋಷವನ್ನು ಕಳೆದುಕೊಂಡು, ತ್ರಿಗುಣಾತೀತ ಸ್ಥಿತಿಯಲ್ಲಿ ಭಗವಂತನನ್ನು ಸೇರಿ ಭಗವಂತನಲ್ಲಿ ನೆಲೆಸುತ್ತಾರೆ. ಈ ಜಗತ್ತು ಸೃಷ್ಟಿಯಾಗುವುದೂ ಲಕ್ಷ್ಮೀ-ನಾರಾಯಣರಿಂದ ಮತ್ತು ಹೋಗಿ ಸೇರುವುದೂ ಅವರನ್ನೇ. ಇದನ್ನು ತಿಳಿದವನು ಹುಟ್ಟು ಸಾವನ್ನು ದಾಟಬಲ್ಲ. ಆತ ಮರಳಿ ಎಂದೂ ಈ ಸಂಸಾರ ಬಂಧದಲ್ಲಿ ಸೀಲುಕುವುದಿಲ್ಲ. ಇಲ್ಲಿ 'ಉಪಜಾಯತೆ' ಎನ್ನುವ ಪದ ಬಳಕೆಯಾಗಿದೆ. ಸಂಸ್ಕೃತದಲ್ಲಿ 'ಉಪ' ಅಂದರೆ 'ಉತ್ಕೃಷ್ಟ'.[ಇದು ಆಂಗ್ಲ ಭಾಷೆಯಲ್ಲಿ **'up/upper'** ಆದರೆ, ಹಿಂದಿಯಲ್ಲಿ **'ऊपर'** ಆಗಿದೆ. ಜರ್ಮನ್ ಭಾಷೆಯಲ್ಲಿ ಇದು **'über'** ಆಗಿದೆ. ಕನ್ನಡದಲ್ಲಿ ಉಪ್ಪರಿಗೆ ಅನ್ನುವಲ್ಲಿ 'ಉಪ' - ''ಮೇಲೆ' ಎನ್ನುವ ಅರ್ಥವನ್ನು ಕೊಡುತ್ತದೆ]. ಆದ್ದರಿಂದ 'ಉಪಜಾಯತೆ' ಎಂದರೆ ಉತ್ಕೃಷ್ಟವಾದ ಜನನ. ಭಗವಂತನ ಅರಿವಿಗೋಸ್ಕರ ಈ ದೇಹ ಧಾರಣೆ ಮಾಡಿ ಹುಟ್ಟುವುದು ಎತ್ತರದ ಹುಟ್ಟು. ಅಧ್ಯಾತ್ಮದ ಸಾಧನೆಯಿಂದ ಎತ್ತರಕ್ಕೇರುವ ಜನನ 'ಉಪಜನನ'. ತನ್ನ ಜೀವಮಾನದಲ್ಲಿ ಈ ಸೃಷ್ಟಿಯ ಮೂಲದ ಜ್ಞಾನವನ್ನು ಗಳಿಸಿದವ ಮತ್ತೆ ಮರಳಿ ಹುಟ್ಟಲಾರ. ಆತ ಭಗವಂತನಲ್ಲಿ ನಿರಂತರ ವಾಸ ಮಾಡುವ ಪರಮ ಪದವನ್ನು ಪಡೆಯುತ್ತಾನೆ.

ಮಮ ಯೋನಿರ್ಮಹದ್ ಬ್ರಹ್ಮ ತಸ್ಮಿನ್ ಗರ್ಭಂ ದಧಾಮ್ಯಹಮ್ ।
ಸಂಭವಃ ಸರ್ವಭೂತಾನಾಂ ತತೋ ಭವತಿ ಭಾರತ ॥ ೩ ॥

ಮಮ ಯೋನಿಃ ಮಹತ್ ಬ್ರಹ್ಮ ತಸ್ಮಿನ್ ಗರ್ಭಮ್ ದಧಾಮಿ ಅಹಮ್ ।
ಸಂಭವಃ ಸರ್ವಭೂತಾನಾಮ್ ತತಃ ಭವತಿ ಭಾರತ –ಚೇತನ ಪ್ರಕೃತಿ ನನ್ನ ಅರ್ಧಾಂಗಿ. ಅವಳಲ್ಲಿ ಸೃಷ್ಟಿಯ ಬೀಜವನ್ನು ಬಿತ್ತುತ್ತೇನೆ. ಭಾರತಾ, ಎಲ್ಲಾ ಜೀವಿಗಳ ಹುಟ್ಟು ಅದರ ಮೂಲಕ ನಡೆಯುತ್ತದೆ.

ಇಲ್ಲಿ ಕೃಷ್ಣ ಬಹಳ ವಿಚಿತ್ರವಾದ ಒಂದು ಸಂಗತಿಯನ್ನು ಹೇಳುತ್ತಾನೆ. ಈ ಶ್ಲೋಕ ಅರ್ಥವಾಗಬೇಕಿದ್ದರೆ ನಾವು ಮೊದಲು 'ಭಾ-ರತ' ರಾಗಬೇಕು. 'ರತ' ಅಂದರೆ ತತ್ಪರತೆ. ನಾವು ಭಗವಂತನಲ್ಲಿ ರತರಾಗಬೇಕು; ಜ್ಞಾನದ ಮಾರ್ಗದಲ್ಲಿ ರತರಾಗಬೇಕು; ಭಕ್ತಿಯಿಂದ ಭರಿತರಾಗಿ ತುಂಬಿದ ಕೊಡವಾಗಬೇಕು; ವಿನೀತರಾಗಿರಬೇಕು. ಆಗ ಸೃಷ್ಟಿಯ ಈ ಗುಟ್ಟು ಅರ್ಥವಾಗುತ್ತದೆ.

ಯಾವುದೇ ಒಂದು ವಸ್ತು ಸೃಷ್ಟಿಯಾಗಬೇಕಿದ್ದರೂ ಅಲ್ಲಿ ಒಂದಕ್ಕಿಂತ ಹೆಚ್ಚು ಕಾರಣಗಳು ಬೇಕು. ಜಡವಾದರೆ ಅಲ್ಲಿ ಎರಡು ಕಾರಣಗಳು ಅಗತ್ಯ. ಉದಾಹರಣೆಗೆ ಒಂದು ಮಡಕೆ ಸೃಷ್ಟಿಯಾಗಬೇಕಿದ್ದರೆ ಅಲ್ಲಿ ಮೂಲದ್ರವ್ಯ(raw

materials) ಬೇಕು ಮತ್ತು ರೂಪ ಕೊಡುವ ಕುಂಬಾರ ಬೇಕು. ವನಸ್ಪತಿಗಳ ಸೃಷ್ಟಿ- ಜಡದೊಳಗೆ ಭಗವಂತ ಜೀವವನ್ನು ಸೇರಿಸುವುದರ ಮೂಲಕ ಆಗುತ್ತದೆ. ಆದರೆ ಗರ್ಭದ ಮೂಲಕ ಹುಟ್ಟುವ 'ಚೇತನ ಸೃಷ್ಟಿ'ಗೆ ಜಡದ್ರವ್ಯದೊಂದಿಗೆ ಸೃಷ್ಟಿ ಮಾಡತಕ್ಕಂತಹ ಒಂದು ಗಂಡು ಮತ್ತು ಒಂದು ಹೆಣ್ಣು ಬೇಕು. ಇಬ್ಬರ ಸಮಾಗಮದಿಂದ ಮೂರನೆಯದು ಸೃಷ್ಟಿಯಾಗುತ್ತದೆ.

ಈ ಶ್ಲೋಕದಲ್ಲಿ 'ಮಮ ಯೋನಿಃ ಮಹತ್ ಬ್ರಹ್ಮ' ಎನ್ನುವಲ್ಲಿ ಬಂದಿರುವ 'ಯೋನಿ' ಮತ್ತು 'ಬ್ರಹ್ಮ' ಎನ್ನುವ ಪದಗಳು ಅನೇಕ ಅರ್ಥವನ್ನು ಕೊಡುವ ಪದಗಳು. ಯಾವ ಸಂದರ್ಭದಲ್ಲಿ ಯಾವ ಅರ್ಥ ಹೊಂದಿಕೆಯಾಗುತ್ತದೆ ಎಂದು ತಿಳಿದು ನಾವು ಶ್ಲೋಕವನ್ನು ಅರ್ಥ ಮಾಡಿಕೊಳ್ಳಬೇಕು. ಯೋನಿ- ಕಾರಣ, ಉತ್ಪತ್ತಿಸ್ಥಾನ, ಹೆಂಡತಿ ಇತ್ಯಾದಿ ಅರ್ಥವನ್ನು ಕೊಡುತ್ತದೆ. ಅದೇ ರೀತಿ ಬ್ರಹ್ಮ- ಜೀವ, ಚತುರ್ಮುಖ, ಲಕ್ಷ್ಮಿ, ಭಗವಂತ ಇತ್ಯಾದಿ ಅನೇಕ ಅರ್ಥವನ್ನು ಕೊಡುತ್ತದೆ. ಈ ಶ್ಲೋಕದಲ್ಲಿ ಯೋನಿ ಅಂದರೆ ಹೆಂಡತಿ; 'ಮಹತ್ ಬ್ರಹ್ಮ' ಎಂದರೆ ಚತುರ್ಮುಖನಿಗೂ ತಾಯಿಯಾಗಿರುವ ಶ್ರೀಲಕ್ಷ್ಮಿ. ಕೃಷ್ಣ ಹೇಳುತ್ತಾನೆ " ನಾನು ನನ್ನ ಪತ್ನಿಯಾದ ಚಿತ್ ಪ್ರಕೃತಿ (ಲಕ್ಷ್ಮಿ)ಯಲ್ಲಿ ಗರ್ಭದಾನ ಮಾಡುತ್ತೇನೆ. ಆ ಗರ್ಭ ಬೆಳೆದು ಸಮಸ್ತ ಜೀವಜಾತಗಳು ಸೃಷ್ಟಿಯಾಗುತ್ತವೆ" ಎಂದು. ಇದು ನಮಗೆ ಹೊಸ ಸಂಗತಿ. ಏಕೆಂದರೆ ಋಗ್ವೇದದಲ್ಲಿ ಚತುರ್ಮುಖನ ಸೃಷ್ಟಿಯ ಬಗ್ಗೆ ಈ ರೀತಿ ಹೇಳಲಾಗಿದೆ:

ತಮಿದ್ಗರ್ಭಂ ಪ್ರಥಮಂ ದಧ್ರ ಆಪೋ ಯತ್ರ ದೇವಾಃ ಸಮಗಚ್ಛಂತ ವಿಶ್ವೇ|
ಅಜಸ್ಯ ನಾಭಾವಧ್ಯೇಕಮರ್ಪಿತಂ ಯಸ್ಮಿನ್ವಿಶ್ವಾನಿ ಭುವನಾನಿ ತಸ್ಥುಃ || ೧೦.೮೨.೦೬||

ಇಲ್ಲಿ "ಭಗವಂತನ ನಾಭಿ ಕಮಲದಿಂದ ಬ್ರಹ್ಮ ಹೊರ ಬಂದ" ಎಂದು ಹೇಳಲಾಗಿದೆ. ಚತುರ್ಮುಖನಿಂದ ಜೀವ ಸೃಷ್ಟಿ ನಿರ್ಮಾಣವಾಯಿತು. ಆದ್ದರಿಂದ ಚತುರ್ಮುಖ ಜಗತ್ತಿನ ತಂದೆ ಎನ್ನುವ ವಿಚಾರವೂ ನಮಗೆ ತಿಳಿದಿದೆ. ವೇದದಲ್ಲಿ ಇನ್ನೊಂದು ಕಡೆ(ಅಂಭ್ರಿಣೀಸೂಕ್ತ) ಹೀಗೆ ಹೇಳಿದ್ದಾರೆ:

ಅಹಂ ಸುವೇ ಪಿತರಮಸ್ಯ ಮೂರ್ಧನ್ ಮಮ ಯೋನಿರಪ್ಸ್ವಂತಃ ಸಮುದ್ರೇ |
ತತೋ ವಿ ತಿಷ್ಠೇ ಭುವನಾನು ವಿಶ್ವೋ-ತಾಮೂಂ ದ್ಯಾಂ ವರ್ಷ್ಮಣೋಪ ಸ್ಪೃಶಾಮಿ || ೭ ||

ಇದು ಲಕ್ಷ್ಮಿ ಹೇಳುವ ಮಾತು: "ನಾನು ಈ ಜಗತ್ತಿನ ತಂದೆಯಾದ ಚತುರ್ಮುಖನನ್ನು ನನ್ನ ನೆತ್ತಿ(ಮೂರ್ಧನ್- ಬೈತಲೆ)ಯಿಂದ ಹೆತ್ತೆ. ನನಗೂ ಕಾರಣನಾದ ಭಗವಂತ ಸಮುದ್ರದಲ್ಲಿದ್ದಾನೆ " ಎಂದು. ಸಮಸ್ತ ಬ್ರಹ್ಮಾಂಡದ ಸೃಷ್ಟಿ ಶಿವನಿಂದಾಯಿತು ಎಂದು ಇನ್ನೊಂದೆಡೆ ಹೇಳುತ್ತಾರೆ. ಶಾಸ್ತ್ರ ಪ್ರಕ್ರಿಯೆ ಗೊತ್ತಿಲ್ಲದಿದ್ದರೆ ಇದೆಲ್ಲವೂ ಬರಿಯ ಗೊಂದಲ. ಮೋಕ್ಷ ಸಾಧನೆ ಮಾಡುವವರು ಇದನ್ನು ಸೂಕ್ಷ್ಮವಾಗಿ ವಿಶ್ಲೇಷಿಸಬೇಕು-ಆಗ ಸತ್ಯ ಸಾಕ್ಷಾತ್ಕಾರವಾಗುತ್ತದೆ.

ಜೀವ-ಪ್ರಕೃತಿ-ಭಗವಂತ ಅನಾದಿ ಅನಂತ. ಸೃಷ್ಟಿ ಪೂರ್ವದಲ್ಲಿ ಸಮಸ್ತ ಪ್ರಪಂಚ ಸೂಕ್ಷ್ಮ ರೂಪದಲ್ಲಿ ಭಗವಂತನ ಉದರದಲ್ಲಿತ್ತು. ಇದನ್ನು ಇನ್ನೂ ಸೂಕ್ಷ್ಮವಾಗಿ ನೋಡಿದರೆ- ಸಮಸ್ತ ವಿಶ್ವ ಲಕ್ಷ್ಮೀದೇವಿಯ ಉದರದಲ್ಲಿತ್ತು ಮತ್ತು ಲಕ್ಷ್ಮಿ ಭಗವಂತನ ಉದರದಲ್ಲಿದ್ದಳು. ಭಗವಂತ ಲಕ್ಷ್ಮಿಯ ಉದರದಲ್ಲಿ ಸಮಸ್ತ ಜೀವಜಾತಗಳ ಬೀಜಕ್ಷೇಪ ಮಾಡಿದ. ಕಮಲ ರೂಪದ ಇಡೀ ಬ್ರಹ್ಮಾಂಡ ಲಕ್ಷ್ಮಿಯ ನೆತ್ತಿಯ ಮೂಲಕ ಭಗವಂತನ ನಾಭಿಯಿಂದ ಹೊರಚಿಮ್ಮಿತು. ಅದರಲ್ಲಿ ಚತುರ್ಮುಖನಿದ್ದ ಜೊತೆಗೆ ಅವ್ಯಕ್ತ ರೂಪದಲ್ಲಿ ಸಮಸ್ತ ದೇವತೆಗಳೂ, ಜೀವಜಾತರೂ ಹುಟ್ಟಿದರು. ಈ ಕಾರಣದಿಂದ ಲಕ್ಷ್ಮೀನಾರಾಯಣರು ಸಮಸ್ತ ಜಗತ್ತಿನ ತಾಯಿ-ತಂದೆ. ಇಲ್ಲಿ ನಾವು ಅರಿಯಬೇಕಾದ ಒಂದು ಮುಖ್ಯ ವಿಚಾರವೆಂದರೆ-ಸೃಷ್ಟಿ ಕ್ರಿಯೆ ಹಂತ ಹಂತವಾಗಿ ನಡೆದ ಕ್ರಿಯೆ. ಲಕ್ಷ್ಮೀ

ನಾರಾಯಣರ ಸಮಾಗಮದಿಂದ ನಿರ್ಮಾಣವಾದದ್ದು ಕೇವಲ ಅವ್ಯಕ್ತ ಸೃಷ್ಟಿ. ನಂತರ ಚತುರ್ಮುಖ ಬ್ರಹ್ಮ ಈ ಸೂಕ್ಷ್ಮರೂಪಿ ಅವ್ಯಕ್ತ ಪ್ರಪಂಚಕ್ಕೆ(ಜೀವ ಜಾತಕ್ಕೆ) ಒಂದು ಮೂಲ ಸ್ಥೂಲರೂಪವನ್ನು ಕೊಟ್ಟು ಜಗತ್ತಿನ ಪಿತಾಮಹನೆನಿಸಿದ. ತದನಂತರ ಶಿವನಿಂದ ಈ ಪ್ರಪಂಚ ಪೂರ್ಣ ಸ್ಥೂಲರೂಪವನ್ನು ಪಡೆಯಿತು. ಈ ಪ್ರಕ್ರಿಯೆಯನ್ನು ನಾವು ಅರ್ಥ ಮಾಡಿಕೊಂಡರೆ ಇಲ್ಲಿ ಯಾವುದೇ ಗೊಂದಲವಿಲ್ಲ. ಚತುರ್ಮುಖ ಲಕ್ಷ್ಮಿಯ ನೆತ್ತಿಯಿಂದ ಹುಟ್ಟಿದ್ದು ಹೌದು; ಆತ ಭಗವಂತನ ನಾಭಿಯಿಂದ ಹುಟ್ಟಿರುವುದೂ ಹೌದು; ಆತ ಜಗತ್ತಿನ ತಂದೆ ಹೌದು; ಶಿವನಿಂದ ಈ ಸ್ಥೂಲ ಪ್ರಪಂಚ ನಿರ್ಮಾಣವಾದದ್ದೂ ಹೌದು; ಲಕ್ಷ್ಮೀ ನಾರಾಯಣರು ಸಮಸ್ತ ಜೀವಜಾತದ ತಾಯಿ-ತಂದೆ ಕೂಡಾ ಹೌದು. ಈ ಕುರಿತ ವಿವರವನ್ನು 'ಮಹಾಭಾರತ ತಾತ್ಪರ್ಯ ನಿರ್ಣಯ'ದಲ್ಲಿ ಸ್ಪಷ್ಟವಾಗಿ ವಿವರಿಸಲಾಗಿದೆ.

ಒಂದು ಚೇತನ[ಭೂತಿ(ಉನ್ನತಿ) ಉಳ್ಳ ಜೀವ]ದ ಸೃಷ್ಟಿಗೆ ಒಂದು ಗಂಡು ಒಂದು ಹೆಣ್ಣಿನ ಸಮಾಗಮ ಅಗತ್ಯ. ಇದು ಸೃಷ್ಟಿ ಆರಂಭದಿಂದಲೇ ಬೆಳೆದುಕೊಂಡು ಬಂದ ಸಂಪ್ರದಾಯ. ಜಗತ್ತಿನ ಎಲ್ಲಾ ಸೃಷ್ಟಿಯ ಹಿಂದೆ ಲಕ್ಷ್ಮೀನಾರಾಯಣರು ತಂದೆ ತಾಯಿಯಾಗಿ ನಿಂತಿದ್ದಾರೆ. ಈ ವಿಷಯವನ್ನು ಇನ್ನೂ ಸ್ಪಷ್ಟವಾಗಿ ಕೃಷ್ಣ ಮುಂದಿನ ಶ್ಲೋಕದಲ್ಲಿ ವಿವರಿಸುತ್ತಾನೆ.

ಸರ್ವಯೋನಿಷು ಕೌಂತೇಯ ಮೂರ್ತಯಃ ಸಂಭವಂತಿ ಯಾಃ ।
ತಾಸಾಂ ಬ್ರಹ್ಮ ಮಹದ್ ಯೋನಿರಹಂ ಬೀಜಪ್ರದಃ ಪಿತಾ ॥೪॥

ಸರ್ವಯೋನಿಷು ಕೌಂತೇಯ ಮೂರ್ತಯಃ ಸಂಭವಂತಿ ಯಾಃ ।
ತಾಸಾಮ್ ಬ್ರಹ್ಮ ಮಹತ್ ಯೋನಿಃ ಅಹಮ್ ಬೀಜಪ್ರದಃ ಪಿತಾ –ಕೌಂತೇಯಾ, ಯಾವೆಲ್ಲಾ ಬಸಿರುಗಳಲ್ಲಿ ಏನೆಲ್ಲಾ ರೂಪಗಳು ರೂಪುಗೊಳ್ಳುತ್ತವೋ- ಅವುಗಳಿಗೆಲ್ಲಾ ಚೇತನ ಪ್ರಕೃತಿಯೇ ತಾಯಿ; ನಾನೇ ಬೀಜ ಬಿತ್ತುವ ತಂದೆ.

ಕೇವಲ ದೇವತೆಗಳು, ಮಾನವರಷ್ಟೇ ಅಲ್ಲ. ಸಮಸ್ತ ಜೀವಜಾತದ ಹುಟ್ಟಿನ ಹಿಂದೆ ತಂದೆ ತಾಯಿಯಾಗಿ ಲಕ್ಷ್ಮೀ-ನಾರಾಯಣರಿದ್ದಾರೆ. ಎಲ್ಲವುದರ ತಾಯಿ-ಚೇತನ ಪ್ರಕೃತಿ ಲಕ್ಷ್ಮಿ. ಬೀಜ ಬಿತ್ತುವ ತಂದೆ ನಾರಾಯಣ. ಮುಂಡಕ ಉಪನಿಷತ್ತಿನಲ್ಲಿ ಹೇಳುವಂತೆ:

ಪುಮಾನ್ ರೇತಃ ಸಿಂಚತಿ ಯೋಷಿತಾಯಾಂ ಬಹ್ವೀಃ ಪ್ರಜಾಃ ಪುರುಷಾತ್ ಸಂಪ್ರಸೂತಾಃ ॥ ೨.೨.೫॥

ಇಲ್ಲಿ 'ಪುಮಾನ್' ಎಂದರೆ ಗಂಡಿನಲ್ಲಿ ವಿಶೇಷವಾಗಿ ಸನ್ನಿಹಿತನಾಗಿರುವ ಭಗವಂತ ಮತ್ತು 'ಯೋಷಿತಾ' ಎಂದರೆ ಹೆಣ್ಣಿನಲ್ಲಿ ವಿಶೇಷವಾಗಿ ಸನ್ನಿಹಿತಳಾಗಿರುವ ಲಕ್ಷ್ಮಿ. ಹೇಗೆ ಹೊಲದಲ್ಲಿ ಬೀಜ ಬಿತ್ತಿದರೆ ಅದು ಅಲ್ಲಿ ನಿಜವಾದ ರೂಪವನ್ನು ತಾಳುತ್ತದೋ, ಹಾಗೇ ಭಗವಂತ ಜಡಪ್ರಕೃತಿಯ ಅಭಿಮಾನಿನಿಯಾದ ಶ್ರೀಲಕ್ಷ್ಮಿಯಲ್ಲಿ ಬೀಜಪ್ರದ ಮಾಡುತ್ತಾನೆ. ತಾಯಿ ಲಕ್ಷ್ಮಿ ಆ ಬೀಜಕ್ಕೆ ಒಂದು ಆಕಾರ ಕೊಡುತ್ತಾಳೆ. ಈ ಅನುಸಂಧಾನ ಎಷ್ಟು ಭವ್ಯ. ಈ ಕಾರಣಕ್ಕಾಗಿ ಹಿಂದಿನ ಕಾಲದ ಶಾಸ್ತ್ರಕಾರರು ಗರ್ಭಿಣಿ ಹೆಣ್ಣಿನ ದೇಹವನ್ನು ದೇವಾಲಯ ಎಂದೂ, ಆ ಗರ್ಭಿಣಿಯ ಗರ್ಭವಿರುವ ಸ್ಥಳ ಗರ್ಭಗುಡಿ ಎಂತಲೂ, ಆ ಗರ್ಭದ ಒಳಗೆ ಸನ್ನಿಹಿತನಾಗಿ ಜೀವವನ್ನು ಬೆಳೆಸುತ್ತಿರುವವ

ಭಗವಂತ ಎಂತಲೂ ಗೌರವಿಸುತ್ತಿದ್ದರು. ಇದು ನಮ್ಮ ಪ್ರಾಚೀನರು ಪ್ರತಿಯೊಂದು ಕ್ರಿಯೆಯಲ್ಲೂ ಭಗವಂತನನ್ನು ಅನುಸಂಧಾನ ಮಾಡುವ ಭವ್ಯತೆ. ಹೆಣ್ಣು ದೇವಾಲಯವಾಗುವುದು ಆಕೆ ಗರ್ಭಿಣಿಯಾದಾಗ. ಹಾಗಾಗಿ ಹೆಣ್ಣಿನ ಸರ್ವ ಶ್ರೇಷ್ಠ ಭಯಕೆ ತಾನು ತಾಯಿಯಾಗಬೇಕು ಎನ್ನುವುದು. ಆಕೆಯ ಬಯಕೆಯ ಕೊನೆಯ ಗುರಿ ಮಾತೃತ್ವ. ಲಕ್ಷ್ಮಿ ಆಕೆಯಲ್ಲಿ ಪೂರ್ಣ ಪ್ರಮಾಣದಲ್ಲಿ ಸನ್ನಿಹಿತಳಾಗುವುದು ಆಕೆ ಗರ್ಭವತಿಯಾದಾಗ. ಈ ಕಾರಣದಿಂದ ದಾಂಪತ್ಯ ಅನ್ನುವುದು ಲಕ್ಷ್ಮೀನಾರಾಯಣರ ಆರಾಧನೆ. ದಾಂಪತ್ಯದಲ್ಲಿ ಗಂಡು ಹೆಣ್ಣಿನ ಸಮಾಗಮ ಎನ್ನುವುದು ಲಕ್ಷ್ಮೀನಾರಾಯಣರ ಸಮಾಗಮ. ಇಲ್ಲಿ ನಮ್ಮ ಭಾಗ್ಯ ಎಂದರೆ ನಮ್ಮನ್ನು ಮಾಧ್ಯಮವಾಗಿ ಬಳಸಿ ಭಗವಂತ ಸೃಷ್ಟಿ ಮಾಡುವುದು. ಈ ರೀತಿ ಸೃಷ್ಟಿಯಾಗುವಾಗ ಇಲ್ಲಿ ಬೇಕಾಗುವ ಮೂಲದ್ರವ್ಯದ ವಿಸ್ತಾರವಾದ ವಿವರಣೆಯನ್ನು ಕೃಷ್ಣ ಮುಂದಿನ ಶ್ಲೋಕಗಳಲ್ಲಿ ನೀಡಿದ್ದಾನೆ.

ಸತ್ತ್ವಂ ರಜಸ್ತಮ ಇತಿ ಗುಣಾಃ ಪ್ರಕೃತಿಸಂಭವಾಃ ।
ನಿಬಧ್ನಂತಿ ಮಹಾಬಾಹೋ ದೇಹೇ ದೇಹಿನಮವ್ಯಯಮ್ ॥೫॥

ಸತ್ತ್ವಮ್ ರಜಃ ತಮಃ ಇತಿ ಗುಣಾಃ ಪ್ರಕೃತಿ ಸಂಭವಾಃ ।
ನಿಬಧ್ನಂತಿ ಮಹಾಬಾಹೋ ದೇಹೇ ದೇಹಿನಮ್ ಅವ್ಯಯಮ್ – ಮಹಾಬಾಹೋ, ಸತ್ವ-ರಜಸ್ಸು-ತಮಸ್ಸು ಎಂಬಿವು ಜಡಪ್ರಕೃತಿಯಿಂದ ಮೂಡಿಬಂದ ಗುಣಗಳು. ಅಳಿವಿರದ ಜೀವನನ್ನು ಇವು ದೇಹದಲ್ಲಿ ಕಟ್ಟಿಹಾಕುತ್ತವೆ.

ಈ ಪ್ರಪಂಚದ, ಸರ್ವ ಜೀವಜಾತದ ತಾಯಿಯಾದ ಪ್ರಕೃತಿ- ಗುಣತ್ರಯಮಾನಿನಿ. ಆದ್ದರಿಂದ ಪ್ರತಿಯೊಂದು ಜೀವ ಹುಟ್ಟುವಾಗಲೂ ಕೂಡಾ ಸತ್ವ-ರಜಸ್ಸು ಮತ್ತು ತಮಸ್ಸೆಂಬ ಮೂರು ಗುಣಗಳೊಂದಿಗೆ ಹುಟ್ಟುತ್ತವೆ ಮತ್ತು ಈ ಗುಣಗಳ ಪ್ರಭಾವದಲ್ಲಿ ಬೆಳೆಯುತ್ತವೆ. ಮೂರು ಗುಣಗಳಿಲ್ಲದೆ ಶುದ್ಧವಾದ ಏಕಗುಣದಿಂದ ಯಾವ ಜೀವವೂ ಸೃಷ್ಟಿಯಾಗುವುದಿಲ್ಲ. ಜಡದಲ್ಲಿ ಕೂಡಾ ಈ ಮೂರು ಗುಣಗಳನ್ನು ಕಾಣುತ್ತೇವೆ. ಸದಾ ಊರ್ಧ್ವಮುಖ ಬೆಳಕನ್ನು ಕೊಡುವ ಬೆಂಕಿ ಸತ್ವ; ಅಸ್ಪಷ್ಟತೆಯ ಸ್ಥಾನವಾದ ನೀರು ರಜಸ್ಸು ಮತ್ತು ಸದಾ ಕೆಳಮುಖವಾಗಿ ಸೆಳೆಯುವ ಮಣ್ಣು-ತಮಸ್ಸು. ಜಗತ್ತಿನ ಎಲ್ಲಾ ವಸ್ತುಗಳೂ ಈ ಮೂರರ ಸಂಯೋಗ(Combination). ಉದಾಹರಣೆಗೆ ಬತ್ತ. ಅದನ್ನು ಭೂಮಿಯಲ್ಲಿ(ಮಣ್ಣು-ತಮಸ್ಸು) ಬಿತ್ತಿದೆವು. ಅಲ್ಲಿ ಅದಕ್ಕೆ ನೀರೆರೆದೆವು(ನೀರು-ರಜಸ್ಸು), ಅದು ಸೂರ್ಯನ ಪ್ರಕಾಶವನ್ನು(ಸೂರ್ಯ-ಸತ್ವ) ಹೀರಿ ಚಿಗುರಿ ಬೆಳೆದು ಫಸಲನ್ನು ಕೊಟ್ಟಿತು. ಆ ಫಸಲನ್ನು ಕೊಯ್ದು ಅಕ್ಕಿಯನ್ನಾಗಿ ಮಾಡಿದೆವು. ಅಕ್ಕಿಗೆ(ತಮಸ್ಸು) ನೀರನ್ನು(ರಜಸ್ಸು) ಸೇರಿಸಿ ಬೇಯಿಸಿ(ಶಾಖ-ಸತ್ವ) ಅನ್ನವನ್ನಾಗಿ ಮಾಡಿದೆವು. ಅಕ್ಕಿ ಇರಲಿ, ಅನ್ನವಿರಲಿ, ಎಲ್ಲವೂ ಮಣ್ಣು-ನೀರು-ಬೆಂಕಿ ಈ ಮೂರರ ಸಂಯೋಜನೆ. ಹೀಗೆ ಸತ್ವ-ರಜಸ್ಸು ಮತ್ತು ತಮಸ್ಸೆಂಬ ಗುಣತ್ರಯಗಳಿಂದ ಈ ಸಮಗ್ರ ಸೃಷ್ಟಿ ನಿರ್ಮಾಣವಾಗಿದೆ. ಹುಟ್ಟುವ ಪ್ರತಿಯೊಂದು ಜೀವಜಾತವನ್ನು ಈ ಮೂರು ಗುಣಗಳು ಬಂಧಿಸುತ್ತವೆ. ಪ್ರತಿಯೊಬ್ಬರಲ್ಲೂ ಈ ಮೂರು ಗುಣಗಳ ಪ್ರಮಾಣ ಬೇರೆ ಬೇರೆಯಾಗಿರುತ್ತದೆ. ಅತ್ಯಂತ ಸಾತ್ವಿಕನಾದ ಮೋಕ್ಷಯೋಗ್ಯ ಜೀವನಲ್ಲಿ ಕೂಡಾ ಈ ಮೂರು ಗುಣಗಳಿರುತ್ತವೆ. ನೂರಕ್ಕೆ ನೂರು ಶುದ್ಧ ಸತ್ವಗುಣ ಒಬ್ಬ ವ್ಯಕ್ತಿಯಲ್ಲಿರುವುದಿಲ್ಲ. ಜಡದಲ್ಲಿ ನೋಡಿದರೆ ಬೆಂಕಿ-ಸತ್ವ. ಆದರೆ ಅದರೊಂದಿಗೆ ಹೊಗೆ-ರಜಸ್ಸು, ಕಟ್ಟಿಗೆ-ತಮಸ್ಸು. ಸತ್ವ ಗುಣದ ಸಾಕ್ಷಾತ್ಕಾರವಿರುವುದೇ ರಜಸ್ಸು ಮತ್ತು

ತಮಸ್ಸಿನ ಮೂಲಕ. ಹೀಗೆ ಈ ಗುಣತ್ರಯಗಳ ಬಂಧನದಿಂದಾಗಿ ಸ್ವರೂಪತಃ ಹುಟ್ಟುಸಾವಿಲ್ಲದ ಜೀವ-ಸ್ಥೂಲ ದೇಹವನ್ನು ಪಡೆದು ಹುಟ್ಟುತ್ತಾನೆ ಮತ್ತು ಆ ದೇಹವನ್ನು ಕಳೆದುಕೊಂಡು ಸಾಯುತ್ತಾನೆ. ಹುಟ್ಟು ಸಾವಿಲ್ಲದ ಮೋಕ್ಷವನ್ನು ಸೇರಲು ನಾವು ನಮ್ಮೊಂದಿಗಿರುವ ಈ ಮೂರು ಅಂತಃಶತ್ರುಗಳನ್ನು ಗೆಲ್ಲಬೇಕು.

ಇಲ್ಲಿ ವ್ಯಾಸರು 'ಮಹಾಬಾಹು' ಎನ್ನುವ ವಿಶೇಷಣವನ್ನು ಬಳಸಿದ್ದಾರೆ. "ನಿನ್ನನ್ನು ಬಂಧಿಸಿ ತಮ್ಮ ಇಷ್ಟದಂತೆ ಕುಣಿಸುವ ಈ ತ್ರಿಗುಣಗಳನ್ನು ಗೆದೆಯುವ ಮಹಾಬಾಹುವಾಗು; ಕುಸ್ಸಿತವನ್ನು ನಿರಾಕರಣೆಮಾಡಿ ಅಧ್ಯಾತ್ಮದ ಶೂರನಾಗು" ಎನ್ನುವ ಧ್ವನಿ ಈ ವಿಶೇಷಣದ ಹಿಂದಿದೆ.

ಇಡೀ ವಿಶ್ವ, ಈ ನಮ್ಮ ಬದುಕು, ಎಲ್ಲವೂ ಗುಣತ್ರಯದ ವಿಕಾರ. ನಮ್ಮ ಮನಸ್ಸು, ನಮ್ಮ ಚಿಂತನೆ, ನಮ್ಮ ನಿರ್ಧಾರ, ನಮ್ಮ ಓದು, ನಮ್ಮ ನಂಬಿಕೆ, ಎಲ್ಲವೂ ಈ ಗುಣಗಳ ಪ್ರಭಾವದಿಂದ. ನಮ್ಮನ್ನು ಸರಿ ದಾರಿಯಲ್ಲಿ ನಡೆಸುವುದೂ ತ್ರಿಗುಣಗಳು, ನಮ್ಮನ್ನು ದಾರಿ ತಪ್ಪಿಸುವುದೂ ಈ ತ್ರಿಗುಣಗಳು. ಮೂರು ದಾರಿಯಲ್ಲಿ ಯಾವ ದಾರಿಯಲ್ಲಿ ಸಾಗಿದರೆ ಒಳಿತಾಗುತ್ತದೆ ಎನ್ನುವ ತೀರ್ಮಾನ ಮಾಡಿಕೊಂಡು ಆಯ್ಕೆ ಮಾಡುವ ಎಚ್ಚರ ನಮಗೆ ಬರಬೇಕಾಗಿದ್ದರೆ, ನಾವು ಯಾವ ದಾರಿಯಲ್ಲಿ ಸಾಗುತ್ತಿದ್ದೇವೆ ಎನ್ನುವ ಅರಿವು ನಮಗೆ ಬೇಕು. ಈ ಕಾರಣಕ್ಕಾಗಿ ತ್ರಿಗುಣಗಳ ಅರಿವು ನಮಗೆ ಬಹಳ ಮುಖ್ಯ.

ಒಬ್ಬ ವ್ಯಕ್ತಿಯನ್ನು ನಿಯಂತ್ರಿಸುವ ಸಂಗತಿಗಳು ನಾಲ್ಕು. ಒಂದು ಅನಾದಿಕಾಲದಿಂದ ಜೀವದ ಜೊತೆಗೆ ಜೀವ ಸ್ವರೂಪದಲ್ಲಿ ಸೇರಿಕೊಂಡಿರತಕ್ಕಂತಹ 'ಸ್ವಭಾವ'. ಇದರ ಜೊತೆಗೆ ಸತ್ವ, ರಜಸ್ಸು, ತಮಸ್ಸು-ಈ ಮೂರು 'ಪ್ರಭಾವ'ಗಳು. ಸ್ವಭಾವ ಎಂದೂ ಬದಲಾಗುವುದಿಲ್ಲ. ನಾವು ನಮ್ಮ ಸ್ವಭಾವವನ್ನು ಗುರುತಿಸಿಕೊಳ್ಳಬೇಕು. ಆದರೆ ನಮ್ಮ ಸ್ವಭಾವ ಏನು ಎನ್ನುವುದು ನಮಗೆ ತಿಳಿಯುವುದೇ ಇಲ್ಲ! ಏಕೆಂದರೆ ಈ ಸ್ವಭಾವದ ಮೇಲೆ ಮುಚ್ಚಳವಾಗಿ 'ಪ್ರಭಾವ' ಕೂತಿದೆ. ನಾವು ಸದಾ ಈ ಮುಚ್ಚಳದ ಪ್ರಭಾವವನ್ನೇ ನಮ್ಮ ಸ್ವಭಾವ ಎಂದು ಭ್ರಮಿಸುತ್ತೇವೆ. ಆದರೆ ಅದು ನಮ್ಮ ನಿಜವಾದ ಸ್ವರೂಪ ಸ್ವಭಾವವಲ್ಲ-ಅದು ಪ್ರಭಾವ. ಇಡೀ ಜೀವಮಾನದುದ್ದಕ್ಕೂ ನಮ್ಮ ಸ್ವಭಾವವೇನು ಎನ್ನುವುದು ನಮಗೆ ತಿಳಿಯದೇ ಹೋಗಬಹುದು. ಸ್ವಭಾವವೇನು ಎಂದು ತಿಳಿಯದೆ ನಾವು ಈ ಪ್ರಭಾವದೊಳಗೆ ಬಿದ್ದು ಒದ್ದಾಡುತ್ತಿರುತ್ತೇವೆ. ನಮಗೆ ಈ ತ್ರಿಗುಣಗಳ ಪ್ರಭಾವ ಹೇಗೆ ಕೆಲಸ ಮಾಡುತ್ತದೆ ಎಂದು ತಿಳಿಯದೇ ಇದ್ದರೆ- ನಮ್ಮನ್ನು ನಾವು ತಿದ್ದಿಕೊಳ್ಳಲು ಆಗುವುದಿಲ್ಲ. ಇಂದು ನಾವು ನಮ್ಮ ಸ್ವಭಾವವನ್ನು ಮತ್ತು ಸತ್ವಗುಣವನ್ನು ಮೂಲೆಗುಂಪಾಗಿಸಿ, ರಜಸ್ಸು ಮತ್ತು ತಮಸ್ಸುಗಳ ಹತೋಟಿಯಲ್ಲಿ ಬದುಕುತ್ತಿದ್ದೇವೆ.

ಮೊದಲು ನಾವು ನಮ್ಮನ್ನು ತಿದ್ದಿಕೊಳ್ಳಬೇಕು-ಸಮಾಜವನ್ನಲ್ಲ. ನಮ್ಮಲ್ಲಿ ಸತ್ವದ ಅಂಶ ಎಷ್ಟಿದೆ; ರಜಸ್ಸಿನ ಅಂಶ ಎಷ್ಟಿದೆ; ತಮಸ್ಸಿನ ಅಂಶ ಎಷ್ಟಿದೆ ಎನ್ನುವುದನ್ನು ತಿಳಿದು, ನಮ್ಮ ನಡೆಯಲ್ಲಿ ಸತ್ವದ ಅಂಶವನ್ನು ಹೆಚ್ಚಾಗಿ ಬಳಸಿ, ಅದರ ಅಂಶವನ್ನು ಹೆಚ್ಚಿಸಿಕೊಳ್ಳಲು ಪ್ರಯತ್ನಿಸಬೇಕು. ಹಿಂದೆ ನಡೆದ ಘಟನೆಗಳಲ್ಲಿ ನಾವು ಎಲ್ಲಿ ರಜಸ್ಸಿನ ಮತ್ತು ತಮಸ್ಸಿನ ಪ್ರಭಾವದಿಂದ ತಪ್ಪಿದ್ದೇವೆ ಎನ್ನುವ ಆತ್ಮಚಿಂತನೆ ನಡೆಸಿ, ಮುಂದೆ ಹಾಗಾಗದಂತೆ ಎಚ್ಚರವಹಿಸಬೇಕು. ಈ ವಿಚಾರವನ್ನು ತಿಳಿದು ನಡೆದರೆ ನಾವು ನಮ್ಮನ್ನು ನಿಯಂತ್ರಿಸಿಕೊಂಡು ಬಹಳ ಆನಂದದಿಂದ ಬದುಕಬಹುದು.

ಮುಂದಿನ ಶ್ಲೋಕಗಳಲ್ಲಿ ಕೃಷ್ಣ ಸತ್ವದ ಬದುಕು ಹೇಗಿರುತ್ತದೆ; ರಜಸ್ಸಿನ ಬದುಕು ಹೇಗಿರುತ್ತದೆ; ತಮಸ್ಸಿನ ಬದುಕು ಹೇಗಿರುತ್ತದೆ ಎನ್ನುವುದನ್ನು ವಿವರಿಸುತ್ತಾನೆ. ತ್ರಿಗುಣದ ಕಟ್ಟಿನಲ್ಲಿ ಸಿಕ್ಕಿಹಾಕಿಕೊಂಡ ಜೀವರು, ಯಾವ ಕಟ್ಟಿನ ಪ್ರಭಾವದಲ್ಲಿ ಹೇಗೆ ನಡೆದುಕೊಳ್ಳುತ್ತಾರೆ ಎನ್ನುವ ಅಂಶ ತಿಳಿದರೆ, ಸತ್ವದ ದಾರಿಯಲ್ಲಿ ಸಾಗಲು ಪ್ರಯತ್ನ ಮಾಡಬಹುದು. ಇದಕ್ಕೆ ಬಹಳ ಸುಂದರವಾದ ವಿಶ್ಲೇಷಣೆಯನ್ನು ಕೃಷ್ಣ ಮುಂದಿನ ಶ್ಲೋಕಗಳಲ್ಲಿ ನೀಡಿದ್ದಾನೆ.

ತತ್ರ ಸತ್ತ್ವಂ ನಿರ್ಮಲತ್ವಾತ್ ಪ್ರಕಾಶಕಮನಾಮಯಮ್ ।
ಸುಖಸಂಗೇನ ಬಧ್ನಾತಿ ಜ್ಞಾನಸಂಗೇನ ಚಾನಘ ॥೬॥

ತತ್ರ ಸತ್ತ್ವಮ್ ನಿರ್ಮಲತ್ವಾತ್ ಪ್ರಕಾಶಕಮ್ ಅನಾಮಯಮ್ ।
ಸುಖ ಸಂಗೇನ ಬಧ್ನಾತಿ ಜ್ಞಾನ ಸಂಗೇನ ಚ ಅನಘ –ಅವುಗಳಲ್ಲಿ ಸತ್ವಗುಣ ಪರಿಶುದ್ಧವಾದದ್ದು. ಆದ್ದರಿಂದ ಜ್ಞಾನದ ಬೆಳಕು ನೀಡುವಂತಾದ್ದು; ಬೇನೆಗಳನ್ನು ನೀಗುವಂತಾದ್ದು. ಓ ಅನಘಾ, ಅದು ಸುಖದ ನಂಟಿನಿಂದ ಮತ್ತು ತಿಳಿವಿನ ನಂಟಿನಿಂದ ಕಟ್ಟಿಹಾಕುತ್ತದೆ.

ಕಣ್ಮುಚ್ಚಿ ಕುಳಿತು ನಿನ್ನೊಳಗೆ ನಿನ್ನನ್ನು ನೋಡು. ನಿನ್ನೊಳಗೆ ನಡೆಯುವ ಮಾನಸಿಕ ಬೆಳವಣಿಗೆಗಳು, ಚಿಂತನೆಗಳು, ಯೋಚನೆಗಳು, ಭಾವನೆಗಳನ್ನು ನೋಡು. ಸತ್ವ ಗುಣದ ಪ್ರಭಾವ ನಿನ್ನ ಮೇಲೆ ಆಗಿದ್ದರೆ- ನಿನ್ನೊಳಗೆ ನೀನು ಸ್ವಚ್ಛ, ನಿರ್ಮಲ ನಿರಾಳವಾದ ಪ್ರಜ್ವಲಿಸುವ ಬೆಳಕನ್ನು ಕಾಣುತ್ತೀಯ. ನಮ್ಮ ಅಂತರಂಗ ಪ್ರಪಂಚಕ್ಕೆ ಪೂರ್ಣ ವಿದ್ಯುತ್ ಸಂಪರ್ಕವಾಗಿದೆ, ದೀಪವನ್ನು, ಆ ದೀಪವನ್ನು ನಿಯಂತ್ರಿಸುವ ಅನೇಕ ಸ್ವಿಚ್ ಅಳವಡಿಸಲಾಗಿದೆ. ಇಲ್ಲಿ ನಿರಂತರ ವಿದ್ಯುತ್ ಸರಬರಾಜಿದೆ. ಆದರೆ ನಮಗೆ ಈ ಸ್ವಿಚ್ ಎಲ್ಲಿದೆ ಎನ್ನುವುದು ಗೊತ್ತಿಲ್ಲ. ಆದ್ದರಿಂದ- ಎಲ್ಲಾ ಇದ್ದರೂ ಸದಾ ನಮ್ಮೊಳಗೆ ಕತ್ತಲು ಆವರಿಸಿಕೊಂಡಿರುತ್ತದೆ. ನಾವು ಅದನ್ನು ಉಪಯೋಗಿಸುವುದೇ ಇಲ್ಲ. ನಮ್ಮಲ್ಲಿ ಸತ್ವಗುಣ ಜಾಗೃತವಾದಾಗ ನಮಗೆ ಈ ಸ್ವಿಚ್ ಸಿಗುತ್ತದೆ. ಅದರಿಂದ ಯಾವುದೇ ದೋಷವಿಲ್ಲದ ಜ್ಞಾನದ ಬೆಳಕು ನಮ್ಮೊಳಗೆ ಬೆಳಗುತ್ತದೆ.
ಸತ್ವದ ಗುಣ ಜಾಗೃತವಾದಾಗ ನಮ್ಮಲ್ಲಿ ಅಂತರಂಗದ ಆನಂದ ತುಂಬಿ ತುಳುಕುತ್ತಿರುತ್ತದೆ. ಈ ಅನುಭವ ಹೆಚ್ಚಿನವರಿಗೆ ಆಗಿರುತ್ತದೆ. ಉದಾಹರಣೆಗೆ: ಕೆಲವೊಮ್ಮೆ ನಾವು ಹೇಳುವುದಿದೆ: "ಏಕೋ ಇಂದು ಬಹಳ ಸಂತೋಷವಾಗುತ್ತಿದೆ" ಎಂದು. ಅಲ್ಲಿ ಏನೂ ವಿಶೇಷ ಕಾರಣವಿರುವುದಿಲ್ಲ. ಆದರೆ ಅಂತರಂಗದ ಆನಂದ ಹೊರ ಹೊಮ್ಮುವುದನ್ನು ನಾವು ಅನುಭವಿಸುತ್ತಿರುತ್ತೇವೆ ಅಷ್ಟೆ. ಇದು ಸತ್ವ ಗುಣದ ಜಾಗೃತಾವಸ್ಥೆ. ಜ್ಞಾನದಿಂದ ಬರುವ ಸುಖವೆಲ್ಲವೂ ಸಾತ್ವಿಕ.
ಇಲ್ಲಿ ಒಂದು ಎಚ್ಚರವನ್ನು ಕೃಷ್ಣ ಕೊಡುತ್ತಾನೆ. ಸತ್ವಗುಣ ನಮ್ಮಲ್ಲಿ ಜಾಗೃತವಾಗಬೇಕಾದರೆ ನಾವು 'ಅನಘ'ರಾಗಬೇಕು. ಪಾಪ ಸ್ಪರ್ಶ ನಮ್ಮಲ್ಲಿದ್ದರೆ-ಸತ್ವಗುಣ ಜಾಗೃತವಾಗದು. ಅದಕ್ಕಾಗಿ ನಾವು ಪಾಪ ದೂರರಾಗಬೇಕು. ಪಾಪ ಸ್ಪರ್ಶ ಎಷ್ಟು ಹೆಚ್ಚಾಯಿತೋ- ಅಷ್ಟು ಸತ್ವ ದೂರ ಹೋಗುತ್ತದೆ.
ಮೋಕ್ಷ ಸಾಧನೆಯಲ್ಲಿ ಸತ್ವಗುಣ ಸಾಧನವಾದರೂ ಕೂಡಾ, ಇದು ತ್ರಿಗುಣಗಳಲ್ಲಿ ಒಂದು. ಆದ್ದರಿಂದ ಸತ್ವಗುಣ ಕೂಡಾ ಬಂಧಕವಾಗಬಹುದು. ಇದು ಸುಖದ ನಂಟಿನಿಂದ ಮತ್ತು ತಿಳಿವಿನ ನಂಟಿನಿಂದ ನಮ್ಮನ್ನು ಕಟ್ಟಿ

ಹಾಕಬಹುದು. ಉದಾಹರಣೆಗೆ: ಜ್ಞಾನ ಸಾಧನೆ ಸಾತ್ವಿಕ ಗುಣ. ಇಲ್ಲಿ ಭಗವಂತನ ವಿಷಯವಲ್ಲದ ಜ್ಞಾನ ಸಾಧನೆಯ ನಂಟಿನಲ್ಲಿ ನಾವು ಬಿದ್ದರೆ-ಆಗ ಅದು ಬಂಧಕವಾಗುತ್ತದೆ. ನಾವು ಯಾವುದೋ ಸಂಶೋಧನೆ, ಅನ್ವೇಷಣೆಯಲ್ಲಿ ಮುಳುಗಿದ್ದರೆ ಅದು ನಮ್ಮನ್ನು ಮೋಕ್ಷದತ್ತ ಕೊಂಡೊಯ್ಯಲಾರದು. ನಾವು ಆ ಸಂಶೋಧನೆಯಲ್ಲಿ ಬರುವ ಫಲಿತಾಂಶದ ಸುಖದ ನಂಟಿನಲ್ಲಿ ಸಿಲುಕಿ ಸತ್ವಗುಣದ ಬಂಧನಕ್ಕೊಳಗಾಗಬಹುದು. ಮೋಕ್ಷ ಸಾಧನೆಯಲ್ಲಿ ನಾವು ಸತ್ವವನ್ನೂ ದಾಟಬೇಕು. ಏಕೆಂದರೆ ಮೋಕ್ಷ ತ್ರಿಗುಣಾತೀತ. ಕೃಷ್ಣ ಇಲ್ಲಿ ಸತ್ವ ಗುಣವನ್ನು 'ಬಧ್ನಾತಿ' ಎಂದಿದ್ದಾನೆ. ಏಕೆಂದರೆ ಈ ಬಂಧನ ಸುಲಭದಲ್ಲಿ ಬಿಡಿಸಿಕೊಳ್ಳಬಹುದಾದ ಬಂಧನ. ಅದು ಎಂದೂ ನಮ್ಮನ್ನು ಕೆಳಕ್ಕೆಳೆಯುವುದಿಲ್ಲ. [ಆದರೆ ರಜಸ್ಸು ಮತ್ತು ತಮಸ್ಸು 'ನಿಬಧ್ನಾತಿ' ಎಂದು ಕೃಷ್ಣ ಮುಂದಿನ ಶ್ಲೋಕಗಳಲ್ಲಿ ಉಲ್ಲೇಖಿಸಿದ್ದಾನೆ]. ಯಾವ ಸತ್ವ ಭಗವಂತನ ಕಡೆಗೆ ಹೋಗದೆ ನಮ್ಮನ್ನು ಬಂಧನದಲ್ಲಿ ಸುತ್ತಾಡಿಸುತ್ತದೋ- ಆ ಸತ್ವದಿಂದ ನಾವು ಪಾರಾಗಬೇಕು.

ರಜೋ ರಾಗಾತ್ಮಕಂ ವಿದ್ಧಿ ತೃಷ್ಣಾಸಂಗಸಮುದ್ಭವಮ್ ।
ತನ್ನಿಬಧ್ನಾತಿ ಕೌಂತೇಯ ಕರ್ಮಸಂಗೇನ ದೇಹಿನಮ್ ॥೭॥

ರಜಃ ರಾಗಾತ್ಮಕಮ್ ವಿದ್ಧಿ ತೃಷ್ಣಾ ಸಂಗ ಸಮುದ್ಭವಮ್ ।
ತತ್ ನಿಬಧ್ನಾತಿ ಕೌಂತೇಯ ಕರ್ಮಸಂಗೇನ ದೇಹಿನಮ್—ರಜೋಗುಣ ರಂಜಿಸುವಂತಾದ್ದು, ಆಸೆ-ಆಸಕ್ತಿಗಳನ್ನು ಹುಟ್ಟಿಸುವಂತಾದ್ದು ಎಂದು ತಿಳಿ. ಕೌಂತೇಯಾ, ಅದು ಜೀವನನ್ನು ಕರ್ಮದ ನಂಟಿನಿಂದ ಕಟ್ಟಿಹಾಕುತ್ತದೆ.

ರಜಸ್ಸು ಅಂದರೆ 'ರಾಗ'. ಒಂದು ವಸ್ತುವನ್ನು ತುಂಬಾ ಇಷ್ಟಪಡುವುದು, ಬಯಕೆಗಳ ಸರಮಾಲೆ- ಹೀಗೆ ಎಲ್ಲಾ ಪಂಚೇಂದ್ರಿಯಗಳ ಬಯಕೆ ರಜೋಗುಣದ ಪ್ರಭಾವದಿಂದ ಬರುವಂತಾದ್ದು. ಇದು ತೃಷ್ಣಾ ಮತ್ತು ಸಂಗಕ್ಕೆ ಕಾರಣ. ಇಲ್ಲಿ ತೃಷ್ಣಾ ಎಂದರೆ ಬೇಕು-ಬೇಕು ಎನ್ನುವ ದಾಹ. ಸಂಗ ಎಂದರೆ ಒಂದು ವಸ್ತುವಿನ ನಿರಂತರ ಒಡನಾಟ. ರಜೋಗುಣ ಬಯಕೆಯನ್ನು ಹುಟ್ಟಿಸುತ್ತದೆ. ಆ ಬಯಕೆಯಿಂದ ಒಡನಾಟ, ಒಡನಾಟದಿಂದ ಅದು ಅಂಟಿಕೊಳ್ಳುವಂತೆ ಮಾಡುತ್ತದೆ. ಹೀಗೆ ಹಂತ ಹಂತವಾಗಿ ರಜೋಗುಣ ನಮ್ಮನ್ನು ಬಿಡಿಸಿಕೊಳ್ಳಲಾಗದ ಬಂಧನಕ್ಕೊಳಪಡಿಸುತ್ತದೆ(ನಿಬಧ್ನಾತಿ). ಇದರ ಪ್ರಭಾವದಿಂದ ನಾವು ಜ್ಞಾನದ ಬಯಕೆ ಇಲ್ಲದ ಕರ್ಮಸಂಗ ಮಾಡಲಾರಂಭಿಸುತ್ತೇವೆ. ಉದಾಹರಣೆಗೆ: ದುಡ್ಡಿಗಾಗಿ ಹೋರಾಟ, ದುಡ್ಡಿಗಾಗಿ ಇಡೀ ಬದುಕನ್ನು ಮೀಸಲಿಡುವುದು. ದುಡ್ಡೇ ಪ್ರಪಂಚ ಎಂದು ಹೋರಾಡುವುದು, ಇತ್ಯಾದಿ. ಇದು ರಜಸ್ಸಿನ ಗಾಢವಾದ ಬಂಧನದ ಪ್ರಭಾವ.

ತಮಸ್ತ್ವಜ್ಞಾನಜಂ ವಿದ್ಧಿ ಮೋಹನಂ ಸರ್ವದೇಹಿನಾಮ್ ।
ಪ್ರಮಾದಾಲಸ್ಯನಿದ್ರಾಭಿಸ್ತನ್ನಿಬಧ್ನಾತಿ ಭಾರತ ॥೮॥

ತಮಃ ತು ಅಜ್ಞಾನಜಮ್ ವಿದ್ಧಿ ಮೋಹನಂ ಸರ್ವದೇಹಿನಾಮ್ ।

ಪ್ರಮಾದ ಆಲಸ್ಯ ನಿದ್ರಾಭಿಃ ತತ್ ನಿಬಧ್ನಾತಿ ಭಾರತ -- ಎಲ್ಲಾ ಜೀವಿಗಳಿಗೆ ಅಜ್ಞಾನ ನೀಡುವಂತಾದ್ದು, ಭ್ರಮೆಗೊಳಿಸುವಂತಾದ್ದು- ತಮೋಗುಣ ಎಂದು ತಿಳಿ. ಭಾರತಾ, ಅದು ಮೈಮರೆವು, ಸೋಮಾರಿತನ ಮತ್ತು ನಿದ್ದೆಗಳಿಂದ ಕಟ್ಟಿಹಾಕುತ್ತದೆ.

ಏನೂ ಗೊತ್ತಿಲ್ಲದೆ ಇರುವುದು ತಮಸ್ಸು. ತಮೋಗುಣದಿಂದ ಅಜ್ಞಾನ ಹುಟ್ಟುತ್ತದೆ. ಅದು ಎಷ್ಟು ಬಲಿಷ್ಟ ಎಂದರೆ- ಅದು  ನನ್ನಲ್ಲಿ ಜ್ಞಾನವಿಲ್ಲ, ನಾನು ಅಜ್ಞಾನಿ ಎನ್ನುವ ಜ್ಞಾನವೂ ಬಾರದಂತೆ ಮಾಡಬಲ್ಲದು. ಇದು ಅತ್ಯಂತ ಭಯಾನಕ. ಆಂಗ್ಲ ಭಾಷೆಯಲ್ಲಿ ಹೇಳುವಂತೆ: **"He who knows not, and knows not that he knows not, is a fool"**. ನನಗೆ ಏನೂ ಗೊತ್ತಿಲ್ಲ ಅನ್ನುವ ವಿಷಯ ಕೂಡಾ ನನಗೆ ಗೊತ್ತಿಲ್ಲದೇ ಇರುವುದು ತಮೋಗುಣದಿಂದ. ಇದು ಸಮಸ್ತರನ್ನು ಭ್ರಮೆಯಲ್ಲಿ ಸಿಲುಕಿಹಾಕಿಸುವ ಗುಣ. ತಮಸ್ಸು ನಾವು ಬಿಡಿಸಿಕೊಳ್ಳಲಾಗದ ಮೂರು ಕಟ್ಟಿನಿಂದ ನಮ್ಮನ್ನು ಬಂಧಿಸುತ್ತದೆ. ಅವುಗಳೆಂದರೆ ನಿದ್ದೆ, ಆಲಸ್ಯ ಮತ್ತು ಪ್ರಮಾದ. ಎಚ್ಚರದಲ್ಲೂ ಎಚ್ಚರವಿಲ್ಲದೇ ಬದುಕುವುದು ಪ್ರಮಾದ. ತಪ್ಪು ಮಾಡುವುದು ತಪ್ಪಲ್ಲ, ಆದರೆ ತಪ್ಪು ಮಾಡಿಯೂ ತಿದ್ದಿಕೊಳ್ಳದೇ ಇರುವುದು ಪ್ರಮಾದ. ಇದಕ್ಕೆಲ್ಲಾ ಕಾರಣ ನಮ್ಮಲ್ಲಿರುವ ತಮೋಗುಣ.

ಸತ್ತ್ವಂ ಸುಖೇ ಸಂಜಯತಿ ರಜಃ ಕರ್ಮಣಿ ಭಾರತ ।
ಜ್ಞಾನಮಾವೃತ್ಯ ತು ತಮಃ ಪ್ರಮಾದೇ ಸಂಜಯತ್ಯುತ ॥೯॥

ಸತ್ತ್ವಂ ಸುಖೇ ಸಂಜಯತಿ ರಜಃ ಕರ್ಮಣಿ ಭಾರತ ।
ಜ್ಞಾನಮ್ ಆವೃತ್ಯ ತು ತಮಃ ಪ್ರಮಾದೇ ಸಂಜಯತಿ ಉತ –ಸತ್ವಗುಣ ಸುಖದ ನಂಟಿನಲ್ಲಿರುತ್ತದೆ. ಭಾರತಾ, ರಜೋಗುಣ ಕರ್ಮದ ನಂಟಿನಲ್ಲಿರುತ್ತದೆ. ತಮೋಗುಣ ಅರಿವನ್ನು ಮುಚ್ಚಿ ಮೈಮರೆಸಿ ಬಿಡುತ್ತದೆ.

ಈ ಶ್ಲೋಕದಲ್ಲಿ ಕೃಷ್ಣ  ಮೂರು ಗುಣಗಳನ್ನು ಒಟ್ಟಿನಲ್ಲಿ ಸಂಕ್ಷೇಪಿಸಿ ಹೇಳುತ್ತಾನೆ. ಸತ್ವದ ಮೂಲ ಗುಣಧರ್ಮ ಏನೆಂದರೆ -ಅದರಿಂದಾಗಿ ನಮ್ಮಿಂದ ಒಂದು ಸಹಜವಾದ ಆನಂದ ಚಿಮ್ಮುತ್ತದೆ. ರಜೋಗುಣ "ಏನಾದರೂ ಮಾಡಬೇಕು ಇಲ್ಲದಿದ್ದರೆ ಜೀವನದಲ್ಲಿ ಸುಖವಿಲ್ಲ" ಎಂದು, ಸದಾ ದುಡ್ಡಿಗಾಗಿ ಹೋರಾಟ ಮಾಡುತ್ತಾ, ತಮ್ಮ ಜೀವನವನ್ನು ಸವೆಸುವಂತೆ ಮಾಡುತ್ತದೆ. ತಮಸ್ಸು ನಮ್ಮಲ್ಲಿರುವ ಜ್ಞಾನವನ್ನು ಮುಚ್ಚಿಬಿಡುತ್ತದೆ. ಉದಾಹರಣೆಗೆ: ಕಷ್ಟದಲ್ಲಿರುವವರಿಗೆ ಸಹಾಯ ಮಾಡಬೇಕು ಎನ್ನುವ ಒಳ್ಳೆಯತನ, ಕೊಡುವುದರಲ್ಲಿ ಖುಷಿಪಡುವುದು-ಸತ್ವಗುಣ. ತಾನು ಸುಖವಾಗಿರಬೇಕು ಎಂದು ಸದಾ ಸುಖದ ಅನ್ವೇಷಣೆಯಲ್ಲಿ ತೊಡಗಿ, ಮಾಡಬಾರದ ಕೆಲಸವನ್ನು ಮಾಡುತ್ತಾ ಬದುಕುವುದು ರಜೋಗುಣ. ಸೋಮಾರಿತನ, ನಿದ್ದೆ, ಅಜ್ಞಾನ, ಅದರಿಂದ ಪ್ರಮಾದ ಇವೆಲ್ಲವೂ ತಮೋಗುಣದ ಪ್ರಭಾವ. ಇದು ನಮಗೆ ಕೃಷ್ಣ ಗೀತೆಯ ಮೂಲಕ ಹೇಳಿದ ಅತ್ಯುನ್ನತವಾದ ಮನಃಶಾಸ್ತ್ರ.

ಈ ಗುಣತ್ರಯಗಳು ಹೇಗೆ ನಮ್ಮನ್ನು ನಿಯಂತ್ರಣಕ್ಕೆ ತೆಗೆದುಕೊಂಡು ನಮ್ಮನ್ನು ಕುಣಿಸುತ್ತವೆ ಎನ್ನುವುದನ್ನು ಕೃಷ್ಣ ನಿರೂಪಿಸಿದ್ದನ್ನು ನೋಡಿದೆವು. ಇಲ್ಲಿ ನಮಗೆ ಒಂದು ಸಂಶಯ ಬರಬಹುದು. ಈ ಮೂರು ಗುಣಗಳು ಒಟ್ಟಿಗೆ ಏಕಕಾಲದಲ್ಲಿ ಕೆಲಸ ಮಾಡುವಾಗ, ಕೇವಲ ಸಾತ್ವಿಕ ಚಿಂತನೆ, ಕೇವಲ ರಾಜಸ ಚಿಂತನೆ, ಕೇವಲ ತಾಮಸ

ಚಿಂತನೆ ಹೇಗೆ ಸಾಧ್ಯವಾಗುತ್ತದೆ? ಮೂರು ಗುಣಗಳು ಒಬ್ಬನ ದೇಹದಲ್ಲಿರುವಾಗ ಯಾವುದೋ ಒಂದು ಗುಣ ಕೆಲಸ ಮಾಡುವುದು ಹೇಗೆ ಸಾಧ್ಯ? ಮೂರು ಗುಣಗಳು ಬೆರೆತು ನಮ್ಮೊಳಗಿರುವಾಗ ಒಂದು ಪ್ರತ್ಯೇಕವಾದ ಸಾತ್ವಿಕ ಸ್ವಭಾವ, ರಾಜಸ ಸ್ವಭಾವ, ತಾಮಸ ಸ್ವಭಾವ ಎಂದು ಗುರುತಿಸುವುದು ಹೇಗೆ? ಇದರ ವಿವರಣೆ ಮುಂದಿನ ಶ್ಲೋಕ.

ರಜಸ್ತಮಶ್ಚಾಭಿಭೂಯ ಸತ್ತ್ವಂ ಭವತಿ ಭಾರತ ।
ರಜಃ ಸತ್ತ್ವಂ ತಮಶ್ಚೈವ ತಮಃ ಸತ್ತ್ವಂ ರಜಸ್ತಥಾ ॥೧೦॥

ರಜಃ ತಮಃ ಚ ಅಭಿಭೂಯ ಸತ್ತ್ವಮ್ ಭವತಿ ಭಾರತ।
ರಜಃ ಸತ್ತ್ವಮ್ ತಮಃ ಚ ಏವ ತಮಃ ಸತ್ತ್ವಮ್ ರಜಃ ತಥಾ –ಭಾರತಾ, ರಜಸ್ಸು-ತಮಸ್ಸುಗಳನ್ನು ತಳ್ಳಿ ಸತ್ವಗುಣ ಬಲಗೊಳ್ಳುತ್ತದೆ; ಸತ್ವ ತಮಸ್ಸುಗಳನ್ನು ತಳ್ಳಿ ರಜೋಗುಣ; ಹಾಗೆಯೇ ಸತ್ವ-ರಜಸ್ಸುಗಳನ್ನು ತಳ್ಳಿ ತಮೋಗುಣ.

ಗುಣತ್ರಯಗಳಿಗೆ ಒಂದು ವಿಶೇಷವಾದ ಶಕ್ತಿ ಇದೆ. ಏನೆಂದರೆ ಈ ಮೂರರಲ್ಲಿ ಯಾವುದೋ ಒಂದು ನಮ್ಮ ಮನಸ್ಸಿನ ನಿಯಂತ್ರಣವನ್ನು ತೆಗೆದುಕೊಂಡು ಉಳಿದ ಎರಡು ಗುಣಗಳನ್ನು ಮುಚ್ಚಿ(Suppress)ಬಿಡುತ್ತದೆ. ಮೂರರಲ್ಲಿ ಒಂದು ಗುಣ ನಮ್ಮ ಮನಸ್ಸನ್ನು ಸ್ವಾಧೀನಪಡಿಸಿಕೊಳ್ಳುತ್ತದೆ. ಆಗ ನಮ್ಮ ಮನಸ್ಸು ಆ ಗುಣಕ್ಕೆ ತಕ್ಕಂತೆ ಕೆಲಸ ಮಾಡಲಾರಂಭಿಸುತ್ತದೆ. ತ್ರಿಗುಣಮಾನಿನಿ ಲಕ್ಷ್ಮಿ. ಆಕೆ ಯಾವುದೋ ಒಂದು ಗುಣಕ್ಕೆ ಉಳಿದ ಎರಡು ಗುಣವನ್ನು ಮೀರಿಸಿ ಕೆಲಸ ಮಾಡುವ ಶಕ್ತಿ ಕೊಡುತ್ತಾಳೆ. ಹೀಗೆ ಒಂದು ಗುಣ ಉಳಿದೆರಡು ಗುಣಗಳನ್ನು ಮುಚ್ಚಿ ಕೆಲಸ ಮಾಡಲಾರಂಭಿಸುತ್ತದೆ.

ನಮ್ಮಲ್ಲಿ ಯಾವ ಗುಣ ಜಾಗೃತವಾಗಿದೆ ಎಂದು ನಾವು ಗುರುತಿಸಿಕೊಳ್ಳಬೇಕು. ಆಗ ಆ ಗುಣದ ಪ್ರಭಾವದಿಂದಾಗುವ ಅನಾಹುತವನ್ನು ತಪ್ಪಿಸಬಹುದು. ಇದನ್ನು ಗುರುತಿಸುವ ವಿಧಾನವನ್ನು ಕೃಷ್ಣ ಮುಂದಿನ ಮೂರು ಶ್ಲೋಕಗಳಲ್ಲಿ ವಿವರಿಸುತ್ತಾನೆ.

ಸರ್ವದ್ವಾರೇಷು ದೇಹೇಽಸ್ಮಿನ್ ಪ್ರಕಾಶ ಉಪಜಾಯತೇ ।
ಜ್ಞಾನಂ ಯದಾ ತದಾ ವಿದ್ಯಾದ್ ವಿವೃದ್ಧಂ ಸತ್ತ್ವ ಮಿತ್ಯುತ ॥೧೧॥

ಸರ್ವದ್ವಾರೇಷು ದೇಹೇ ಅಸ್ಮಿನ್ ಪ್ರಕಾಶಃ ಉಪಜಾಯತೇ ।
ಜ್ಞಾನಮ್ ಯದಾ ತದಾ ವಿದ್ಯಾತ್ ವಿವೃದ್ಧಮ್ ಸತ್ತ್ವಮ್ ಇತಿ ಉತ –ಈ ದೇಹದಲ್ಲಿ ಎಲ್ಲಾ ಇಂದ್ರಿಯಗಳಲ್ಲೂ ತಿಳಿವು ಬೆಳಕಾಗಿ ಮೂಡಿಬಂದಾಗ ಸತ್ವಗುಣ ಬಲಗೊಂಡಿದೆ ಎಂದು ತಿಳಿಯಬೇಕು.

ಸತ್ವಗುಣ ಜಾಗೃತವಾದಾಗ ನಮ್ಮೊಳಗೆ ಬೆಳಕು ತುಂಬಿದ ಅನುಭವವಾಗುತ್ತದೆ. ಈ ಬೆಳಕಿನ ಸಂಚಾರ ಎಲ್ಲಾ ಇಂದ್ರಿಯಗಳ ಮೂಲಕ ಹೊರಬರುತ್ತದೆ. ಸರ್ವೇಂದ್ರಿಯದಲ್ಲೂ ಜ್ಞಾನದ ಆನಂದ ತುಂಬುತ್ತದೆ. ಎಲ್ಲಕ್ಕಿಂತ

ಮುಖ್ಯವಾಗಿ ನಮ್ಮ ಮನಸ್ಸಿನಲ್ಲಿ ಹೊಸಹೊಸ ಜ್ಞಾನದ ವಿಚಾರ (intututional flash) ಹೊಳೆಯಲಾರಂಭಿಸುತ್ತದೆ. ಇದರಿಂದ ಅಪಾರ ಸಂತೋಷವಾಗುತ್ತದೆ. ಇದು ಸತ್ವಗುಣದ ಜಾಗೃತಾವಸ್ಥೆ.

ಲೋಭಃ ಪ್ರವೃತ್ತಿರಾರಂಭಃ ಕರ್ಮಣಾಮಶಮಃ ಸ್ಪೃಹಾ।
ರಜಸ್ಯೇತಾನಿ ಜಾಯಂತೇ ವಿವೃದ್ಧೇ ಭರತರ್ಷಭ ॥೧೨॥

ಲೋಭಃ ಪ್ರವೃತ್ತಿಃ ಆರಂಭಃ ಕರ್ಮಣಾಮ್ ಅಶಮಃ ಸ್ಪೃಹಾ।

ರಜಸಿ ಏತಾನಿ ಜಾಯಂತೇ ವಿವೃದ್ಧೇ ಭರತರ್ಷಭ – ಓ ಭರತರ್ಷಭಾ, ರಜೋಗುಣ ಬಲಗೊಂಡಾಗ ಕಂಡುಬರುವ ಅಂಶಗಳು ಇವು: ಜಿಪುಣತನ, ಹುಚ್ಚುಹುರುಪು, ಕಾಯಕಗಳಲ್ಲಿ ತೊಡಗುವುದು, ನೆಮ್ಮದಿಗೇಡು ಮತ್ತು ತೀರದ ಬಯಕೆ.

ರಜೋಗುಣ ಜಾಗೃತವಾದಾಗ ನಮ್ಮಲ್ಲಿ ಮೊದಲು ಕಾಣಿಸಿಕೊಳ್ಳುವುದು ಲೋಭತನ. ಯಾವ ರೀತಿ ದುಡ್ಡು ಮಾಡುವುದು ಎನ್ನುವ ಯೋಚನೆ; ಇನ್ನೊಬ್ಬರಿಗೆ ಒಂದು ಪುಡಿಗಾಸನ್ನೂ ಕೊಡದ ಜಿಪುಣತನ, ಇತ್ಯಾದಿ. ಉದಾಹರಣೆಗೆ ಕೆಲವರು ತಮ್ಮ ಮನೆ ಸಮಾರಂಭಕ್ಕೆ ಲಕ್ಷಾಂತರ ಖರ್ಚು ಮಾಡುತ್ತಾರೆ. ಆದರೆ ಯಾರೋ ಹೊಟ್ಟೆಗೆ ಹಿಟ್ಟಿಲ್ಲದ ವ್ಯಕ್ತಿ ಬಂದು ಕೇಳಿದರೆ ಇವರಿಂದ ಅವರಿಗೆ ಒಂದು ಪೈಸೆ ದಾನ ಕೂಡಾ ಸಿಗದು. ಇದು ಲೋಭತನ. ಇಂತಹ ಲೋಭಿಗಳ ಬಗ್ಗೆ ನೀತಿ ಶತಕದಲ್ಲಿ ಭವಭೂತಿ ಹೀಗೆ ಹೇಳಿದ್ದಾನೆ:

ದಾನಂ ಭೋಗೋ ನಾಶಃ ತಿಸ್ರೋ ಭವಂತಿ ಗತಯೋ ವಿತ್ತಸ್ಯ|
ಯೋ ನ ದದಾತಿ ನ ಭುಂಕ್ತೇ ತಸ್ಯ ತೃತೀಯಾ ಗತಿರ್ಭವತಿ||೧೫೮||

ದುಡ್ಡಿಗೆ ಮೂರು ರೂಪದ ವಿನಿಯೋಗ: ದಾನ, ಭೋಗ, ನಾಶ. ಲೋಭಿಗಳು ತಮ್ಮಲ್ಲಿರುವ ಹಣವನ್ನು ಇನ್ನೊಬ್ಬರಿಗೆ ದಾನ ಮಾಡುವುದಿಲ್ಲ, ತಾವೂ ತಿನ್ನುವುದಿಲ್ಲ, ಕೊನೆಗೆ ಅದು ನರಿ-ನಾಯಿ ಪಾಲಾಗಿ ನಾಶವಾಗುತ್ತದೆ. ಇದು ರಜೋಗುಣದ ಪ್ರಭಾವದಿಂದಾಗುವ ಪರಿಣಾಮ. ರಜೋಗುಣದ ಪ್ರಭಾವಕ್ಕೊಳಗಾದಾಗ ವ್ಯಕ್ತಿ ಸದಾ ಯಾವುದ್ಯಾವುದೋ ಪ್ರವೃತ್ತಿಯನ್ನು ಮಾಡ ಬಯಸುತ್ತಾನೆ. ದುಡ್ಡು ಮಾಡುವುದಕ್ಕಾಗಿ ಬಗೆಬಗೆಯ ವ್ಯವಹಾರಗಳು; ಎಷ್ಟು ತೊಡಗಿಸಿಕೊಂಡರೂ ಅಲ್ಲಿ ಅತೃಪ್ತಿ; ತಾನು ಮಾಡುವ ವ್ಯವಹಾರದಲ್ಲಿ ದೇವರು ತನಗೆ ಹೊಟ್ಟೆ ಬಟ್ಟೆಗಾಗುವಷ್ಟು ಕೊಟ್ಟರೂ ಕೂಡಾ ಅಲ್ಲಿ ತೃಪ್ತಿ ಇಲ್ಲದೇ ಇರುವುದು; ತನಗೆ ಬರುತ್ತಿರುವ ಸಂಬಳದಲ್ಲಿ ತಾನು ಸುಖವಾಗಿ ಬದುಕಲು ಸಾಧ್ಯವಾದರೂ ಕೂಡಾ, ಅದು ಪಕ್ಕದ ಮನೆಯವರ ಸಂಬಳಕ್ಕಿಂತ ಕಡಿಮೆ ಎಂದು ಕೊರಗುವುದು ಇತ್ಯಾದಿ. ಇಂತವರ ನಿತ್ಯ ಮಂತ್ರ "ಬೇಕು-ಬೇಕು". ಸತ್ವಗುಣವನ್ನು ತುಳಿದು ರಜೋಗುಣ ತಲೆಯೆತ್ತಿ ನಿಂತಾಗ ಈ ಎಲ್ಲಾ ಲಕ್ಷಣಗಳು ಕಾಣಿಸಿಕೊಳ್ಳುತ್ತವೆ.

ಇಲ್ಲಿ ವ್ಯಾಸರು 'ಭರತರ್ಷಭ' ಎನ್ನುವ ವಿಶೇಷಣವನ್ನು ಬಳಸಿದ್ದಾರೆ. ರಜೋಗುಣದಿಂದ ಪಾರಾಗಲು ನಾವು ಭರತರ್ಷಭರಾಗಬೇಕು. ಐತರೇಯ ಬ್ರಾಹ್ಮಣದಲ್ಲಿ 'ವಾಯರ್ವಾವ ಭರತಃ' ಎನ್ನುವ ಒಂದು ಮಾತಿದೆ. ಸದಾ ಭಗವಂತನಲ್ಲಿ ನಿರತನಾದ ವಾಯುದೇವರಿಗೆ 'ಭರತ' ಎಂದು ಹೆಸರು. ಪ್ರಾಣದೇವರಲ್ಲಿ ಶರಣಾಗತಿ ನಮ್ಮನ್ನು ರಜೋಗುಣದಿಂದ ಪಾರುಮಾಡಬಲ್ಲದು.

ಅಪ್ರಕಾಶೋಽಪ್ರವೃತ್ತಿಶ್ಚ ಪ್ರಮಾದೋ ಮೋಹ ಏವ ಚ ।
ತಮಸ್ಯೇತಾನಿ ಜಾಯಂತೇ ವಿವೃದ್ಧೇ ಕುರುನಂದನ ॥೧೩॥

ಅಪ್ರಕಾಶಃ ಅಪ್ರವೃತ್ತಿಃ ಚ ಪ್ರಮಾದಃ ಮೋಹಃ ಏವ ಚ ।
ತಮಸಿ ಏತಾನಿ ಜಾಯಂತೇ ವಿವೃದ್ಧೇ ಕುರುನಂದನ – ಓ ಕುರುನಂದನಾ, ತಮಸ್ಸು ಬಲಗೊಂಡಾಗ ಕಂಡುಬರುವ ಅಂಶಗಳು ಇವು: ಅಂಧಕಾರ, ಹುರುಪುಗೇಡು, ಎಚ್ಚರಗೇಡು ಮತ್ತು ತಪ್ಪರಿವು.

ತಮೋಗುಣ ಜಾಗೃತವಾದಾಗ ಒಳಗೂ ಹೊರಗೂ ಎಲ್ಲವೂ ಕತ್ತಲು. ಯಾವಾಗಲೂ ನಿದ್ದೆ ಮಾಡುವುದು, ತಪ್ಪು ಮಾಡುವುದು, ಅಜ್ಞಾನದಲ್ಲಿ ಬದುಕುವುದು- ತಮೋಗುಣದ ಪ್ರಭಾವದಿಂದ. ಮುಂಜಾನೆ ಸೂರ್ಯ ಮೂಡುವ ಮುಂಚೆ ಏಳಲು ತಮೋಗುಣ ಬಿಡುವುದಿಲ್ಲ. ಸದಾ ನಿದ್ದೆಮಾಡುವಂತೆ ಈ ಗುಣ ನಮ್ಮನ್ನು ಪ್ರೇರೇಪಿಸುತ್ತದೆ. ಈ ಗುಣ ಸದಾ ಕತ್ತಲೆಯನ್ನು ಬಯಸುವಂತೆ ಮಾಡುತ್ತದೆ. ಇದರ ಪ್ರಭಾವದಿಂದ ಪಾರಾಗಲು ನಾವು ಕುರುನಂದನರಾಗಬೇಕು. ನಮ್ಮನ್ನು ನಾವು ಯಾವುದೋ ಒಂದು ಕೆಲಸದಲ್ಲಿ ತೊಡಗಿಸಿಕೊಂಡು ಅದನ್ನು ರೂಢಿ ಮಾಡಿಕೊಳ್ಳಬೇಕು. ಉದಾಹರಣೆಗೆ: ಮುಂಜಾನೆ ಸೂರ್ಯೋದಯವಾಗುವ ಮುಂಚೆ ಏಳುವ ಅಭ್ಯಾಸ ಮಾಡಿಕೊಳ್ಳುವುದು. ಹೀಗೆ ರೂಢಿ ಮಾಡಿಕೊಂಡಾಗ ಮನಸ್ಸು ಅದನ್ನು ಬಿಡಲು ಕೇಳುವುದಿಲ್ಲ.
ನಮ್ಮಲ್ಲಿ ಕೆಲವರು ಹೇಳುವುದಿದೆ. "ಅಧ್ಯಾತ್ಮ ಚಿಂತನೆ ಮಾಡಲು ನನ್ನಲ್ಲಿ ಸಮಯವಿಲ್ಲ" ಎಂದು. ಆದರೆ ಹೀಗೆ ಹೇಳುವವರಲ್ಲಿ ಹೆಚ್ಚಿನವರು ತಮ್ಮ ರಜಾ ದಿನಗಳಲ್ಲಿ, ಬಿಡುವಿನ ಕಾಲದಲ್ಲಿ - ಮುಂಜಾನೆಯಿಂದ ಸಂಜೆಯ ತನಕ ಸೋಮಾರಿಯಾಗಿ ನಿದ್ದೆ ಮಾಡುತ್ತಾ ಕಾಲಹರಣ ಮಾಡುತ್ತಿರುತ್ತಾರೆ! ಹೀಗೆ ನಮಗರಿವಿಲ್ಲದಂತೆ ನಮ್ಮನ್ನು ತಮೋಗುಣ ಆಕ್ರಮಿಸಿ ನಿಯಂತ್ರಿಸುತ್ತಿರುತ್ತದೆ. ನಾವು ಸೋಮಾರಿಯಾಗದೆ ಯಾವುದಾದರೂ ಕರ್ತವ್ಯದಲ್ಲಿ ನಮ್ಮನ್ನು ತೊಡಗಿಸಿಕೊಳ್ಳುವುದರಿಂದ ತಮೋಗುಣದ ಪ್ರಭಾವದಿಂದ ಪಾರಾಗಬಹುದು.

ಯದಾ ಸತ್ವೇ ಪ್ರವೃದ್ಧೇ ತು ಪ್ರಳಯಂ ಯಾತಿ ದೇಹಭೃತ್ ।
ತದೋತ್ತಮವಿದಾಂ ಲೋಕಾನಮಲಾನ್ ಪ್ರತಿಪದ್ಯತೇ ॥೧೪॥

ಯದಾ ಸತ್ವೇ ಪ್ರವೃದ್ಧೇ ತು ಪ್ರಳಯಮ್ ಯಾತಿ ದೇಹಭೃತ್ ।
ತದಾ ಉತ್ತಮವಿದಾಮ್ ಲೋಕಾನ್ ಅಮಲಾನ್ ಪ್ರತಿಪದ್ಯ ತೇ –ಸತ್ವಗುಣ ಬಲಗೊಂಡಾಗ ಜೀವಿ ಸಾವನ್ನಪ್ಪಿದರೆ, ಹಿರಿದಾದ ತತ್ವವನ್ನು- ಬಲ್ಲವರ ಕುಲದಲ್ಲಿ, ದೋಷವಿರದ ದೇಹವನ್ನು ಪಡೆಯುತ್ತಾನೆ.

ನಮಗೆ ತಿಳಿದಂತೆ ಜೀವ ದೇಹವನ್ನು ಬಿಟ್ಟು ಹೊರ ಹೋಗುವ ಕೊನೆಯ ಕ್ಷಣ ಆ ಜೀವದ ಮುಂದಿನ ನಡೆಯನ್ನು ನಿರ್ಧರಿಸುತ್ತದೆ. ಅಂತ್ಯಕಾಲದಲ್ಲಿ ಸಾತ್ವಿಕವಾದ ಚಿಂತನೆಯೊಂದಿಗೆ, ಸತ್ವದ ಪ್ರಭಾವದಲ್ಲಿ ಪ್ರಾಣ ಬಿಡಲು ಸಾಧ್ಯವಾದರೆ, ಮುಂದಿನ ಜನ್ಮದಲ್ಲಿ ಯಾವುದೇ ದೋಷವಿಲ್ಲದ ಮನುಷ್ಯರಾಗಿ ಜ್ಞಾನಿಗಳ ಸಮುದಾಯದಲ್ಲಿ ಹುಟ್ಟುತ್ತೇವೆ. ಅಲ್ಲಿ ಜ್ಞಾನಿಗಳ ನಡುವೆ ಇದ್ದು, ಜ್ಞಾನವನ್ನು ಬೆಳೆಸಿಕೊಂಡು ಮತ್ತೆ ಜ್ಞಾನ ಮಾರ್ಗದಲ್ಲಿ ಎತ್ತರಕ್ಕೇರಲು ಸಾಧ್ಯವಾಗುತ್ತದೆ. ಜೀವಮಾನದಲ್ಲಿ ನಾವು ಸತ್ವಕ್ಕೆ ಒತ್ತು ಕೊಟ್ಟು ಬದುಕಿದರೆ ಮಾತ್ರ

ಸಾಯುವಾಗ ಸತ್ವದ ಅಧಿಷ್ಠಾನದಲ್ಲಿ ಸಾಯಲು ಸಾಧ್ಯವಾಗಬಹುದು. ಇದನ್ನು ಬಿಟ್ಟು "ಸಾಯುವಾಗ ಸಾತ್ವಿಕ ಚಿಂತನೆ ಬಗ್ಗೆ ಯೋಚಿಸೋಣ" ಎಂದು ಬದುಕಿದರೆ, ಸತ್ವದ ಪ್ರಭಾವದಲ್ಲಿ ಸಾಯುವುದು ಅಸಾಧ್ಯ.

ರಜಸಿ ಪ್ರಳಯಂ ಗತ್ವಾ ಕರ್ಮ ಸಂಗಿಷು ಜಾಯತೇ ।
ತಥಾ ಪ್ರಲೀನಸ್ತಮಸಿ ಮೂಢಯೋನಿಷು ಜಾಯತೇ ॥೧೫॥

ರಜಸಿ ಪ್ರಳಯಮ್ ಗತ್ವಾ ಕರ್ಮ ಸಂಗಿಷು ಜಾಯತೇ ।
ತಥಾ ಪ್ರಲೀನಃ ತಮಸಿ ಮೂಢ ಯೋನಿಷು ಜಾಯತೇ –ರಜೋಗುಣದಲ್ಲಿ ಸಾವನ್ನಪ್ಪಿದರೆ ಕರ್ಮಕ್ಕೆ ಅಂಟಿಕೊಂಡವರಲ್ಲಿ ಹುಟ್ಟುತ್ತಾನೆ. ತಮೋಗುಣದಲ್ಲಿ ಸತ್ತವನು ತಿಳಿವಿರದ ಹೀನಯೋನಿಗಳಲ್ಲಿ ಹುಟ್ಟುತ್ತಾನೆ.

ಜ್ಞಾನಕ್ಕೆ ಪೂರಕವಲ್ಲದ ಕರ್ಮಾನುಷ್ಠಾನ ಮಾಡುತ್ತಾ ರಜೋಗುಣದ ಪ್ರಭಾವದಲ್ಲಿ ದುಡ್ಡು-ದುಡ್ಡು ಎಂದು ಬದುಕಿ, ಅದೇ ಪ್ರಭಾವದಲ್ಲಿ ಸತ್ತರೆ-ಆಗ ಮುಂದಿನ ಜನ್ಮದಲ್ಲಿ ಕರ್ಮಕ್ಕೆ ಅಂಟಿಕೊಂಡು ಹುಟ್ಟಬೇಕಾಗುತ್ತದೆ. ಇನ್ನು ತಮೋಗುಣದ ಪ್ರಭಾವದಲ್ಲಿ ಬದುಕಿ ಸತ್ತರೆ ಮುಂದಿನ ಜನ್ಮದಲ್ಲಿ ಹೀನಯೋನಿಯಲ್ಲಿ ಹುಟ್ಟಬೇಕಾಗುತ್ತದೆ. ಇಲ್ಲಿ 'ಹೀನಯೋನಿ' ಅಂದರೆ ಮನುಷ್ಯ ಕೂಡಾ ಆಗಬಹುದು. ಯಾವುದೇ ಸಂಸ್ಕಾರವಿಲ್ಲದ, ಸ್ವಚ್ಛತೆ ಇಲ್ಲದ, ಜ್ಞಾನವಿಲ್ಲದ, ಕೇವಲ ಮನುಷ್ಯ ಆಕಾರವನ್ನು ಪಡೆದು, ಮನುಷ್ಯತ್ವದ ಲವಲೇಷವಿಲ್ಲದೆ ಮನುಷ್ಯರಾಗಿ ಬದುಕುವುದೂ ಕೂಡಾ ಹೀನಯೋನಿ ಜನನ. ಇದಕ್ಕಿಂತ ಪ್ರಾಣಿ ಜನ್ಮ ಎಷ್ಟೋ ಮೇಲು. ಇದು ತಮೋಗುಣದಲ್ಲಿ ಸತ್ತಾಗ ಆಗುವ ಪರಿಣಾಮ. [ಸಾಯುವ ಕೊನೇ ಕ್ಷಣದಲ್ಲಿ ರಜಸ್ಸು ಮತ್ತು ತಮಸ್ಸಿನ ಪ್ರಭಾವದಿಂದ ಸತ್ತರೆ, ಅದು ನಮ್ಮ ಮುಂದಿನ ಜನ್ಮದ ಮೇಲೆ ಹೇಗೆ ಪರಿಣಾಮ ಬೀರುತ್ತದೆ ಎನ್ನುವುದನ್ನು-ಘಜೇಂದ್ರನಾಗಿ ಹುಟ್ಟಿದ ಇಂದ್ರದ್ಯುಮ್ನ ಮತ್ತು ಜಿಂಕೆಯಾಗಿ ಹುಟ್ಟಿದ ಭರತ ಚಕ್ರವರ್ತಿಯ ಕಥೆಯಿಂದ ನಾವು ತಿಳಿಯಬಹುದು. ಪುನರ್ಜನ್ಮದ ಬಗ್ಗೆ ಇತ್ತೀಚಿನ ಸಂಶೋಧನೆ ಬಗ್ಗೆ ತಿಳಿಯಲು Edgar cayce(1877 to 1920) ಅವರ ಪುಸ್ತಕಗಳು ಹಾಗೂ ಅವರ ಮೇಲಿನ ಸಂಶೋಧನೆಯ ವಿವರಗಳನ್ನು ನೋಡಿ ].

ಕರ್ಮಣಃ ಸುಕೃತಸ್ಯಾSಹುಃ ಸಾತ್ತ್ವಿಕಂ ನಿರ್ಮಲಂ ಫಲಮ್ ।
ರಜಸಸ್ತು ಫಲಂ ದುಃಖಮಜ್ಞಾನಂ ತಮಸಃ ಫಲಮ್ ॥೧೬॥

ಕರ್ಮಣಃ ಸುಕೃತಸ್ಯ ಆಹುಃ ಸಾತ್ತ್ವಿಕಮ್ ನಿರ್ಮಲಮ್ ಫಲಮ್ ।
ರಜಸಃ ತು ಫಲಮ್ ದುಃಖಮ್ ಅಜ್ಞಾನಮ್ ತಮಸಃ ಫಲಮ್ – ಒಳ್ಳೆಯ ಕಜ್ಜದಿಂದ ದುಗುಡವಿರದ ಸಾತ್ವಿಕ ಫಲ ಎನ್ನುತ್ತಾರೆ ತಿಳಿದವರು. ರಾಜಸವಾದ ಕಜ್ಜದಿಂದ ದುಃಖ ಬೆರೆತ ಸುಖ. ತಿಳಿಗೇಡಿತನವೇ ತಮೋಗುಣದ ಕಜ್ಜದ ಫಲ.

ಜೀವನದುದ್ದಕ್ಕೂ ಇನ್ನೊಬ್ಬರಿಗೆ ಸಹಾಯವಾಗುವಂತಹ ಕೆಲಸ ಮಾಡಿದರೆ ಅದು ಸುಕೃತ. ನಮ್ಮಲ್ಲಿ ಸಂಪತ್ತಿದ್ದಾಗ ಅದು ನನ್ನದು-ನನ್ನದು ಎಂದು ಜಿಪುಣನಾಗಿ ಬದುಕಿದರೆ ಅದರಿಂದ ದುಃಖಭರಿತ ಜೀವನ

ನಮ್ಮದಾಗುತ್ತದೆ. ನಾವು ಗಳಿಸಿದ್ದನ್ನು ಇನ್ನೊಬ್ಬರ ಕಷ್ಟದಲ್ಲಿ ವಿನಿಯೋಗಿಸಿದಾಗ ಅದು ನಮ್ಮನ್ನು ಸಾತ್ವಿಕ ಫಲದತ್ತ ಕೊಂಡೊಯ್ಯುತ್ತದೆ. ಮಧ್ವಾಚಾರ್ಯರು ಈ ವಿಚಾರಕ್ಕೆ ಒತ್ತು ಕೊಟ್ಟು ತಮ್ಮ 'ಗೀತಾತಾತ್ಪರ್ಯ'ದಲ್ಲಿ ಹೀಗೆ ಹೇಳಿದ್ದಾರೆ: "ನಾನಾ ಜನಸ್ಯ ಶುಶ್ರೂಷಾ ಕರ್ತವ್ಯಾ ಕರವನ್ಮಿತೇ" ಕಷ್ಟದಲ್ಲಿರುವವರ ಸೇವೆ ಮಾಡುವುದು ಮೋಕ್ಷ ಸಾಧನೆಯ ಒಂದು ಮುಖ. ನಮ್ಮಲ್ಲಿ ಕೆಲವರು ಕಷ್ಟದಲ್ಲಿರುವವರನ್ನು ಕಂಡು ಹೀಗೆ ಹೇಳುವುದಿದೆ: "ಅದು ಅವನ ಪ್ರಾರಾಬ್ಧಕರ್ಮ, ಅದನ್ನು ಅವನು ಅನುಭವಿಸಲಿ. ಅದಕ್ಕೆ ನಾನ್ಯಾಕೆ ಚಿಂತಿಸಬೇಕು" ಎಂದು. ಈ ರೀತಿ ಹೇಳಿದಾಗ ನಾವು ಆ ಕಷ್ಟದಲ್ಲಿರುವ ವ್ಯಕ್ತಿಯ ಒಳಗಿರುವ ಭಗವಂತನನ್ನು ತಿರಸ್ಕಾರ ಮಾಡಿದಂತಾಗುತ್ತದೆ. ಇಂತವರಿಗೆ ಎಂದೆಂದೂ ಭಗವಂತನ ಸಾಕ್ಷಾತ್ಕಾರವಾಗುವುದಿಲ್ಲ. ನಮ್ಮ ಆಧ್ಯಾತ್ಮಿಕ ಸಾಧನೆಯಲ್ಲಿ ಜಪ-ತಪವಷ್ಟೇ ಸಾಲದು; ಇಲ್ಲಿ ಕಷ್ಟದಲ್ಲಿರುವ ಜನರ ಸೇವೆಯೂ ಒಂದು ಪ್ರಧಾನವಾದ ಅಂಶ. ಸಾಧಕನು ತನ್ನ ನಿತ್ಯಾನುಷ್ಠಾನಗಳ ಜತೆಗೆ ಈ ಸೇವಾಕಾರ್ಯವನ್ನು ಆಚರಿಸಬೇಕೆನ್ನುವುದು ಗೀತೆಯ ಆದೇಶವೆಂದು ಮಧ್ವಾಚಾರ್ಯರು ಪ್ರತಿಪಾದಿಸಿದ್ದಾರೆ. ನಿನ್ನ ಮನೆಯಲ್ಲಿ ಬೆಂದ ಅನ್ನ ಎಷ್ಟು ಹಸಿದ ಜನರ ಹಸಿವನ್ನು ತಣಿಸುತ್ತದೋ-ಅಷ್ಟು ಸುಕೃತ. ಇದಕ್ಕಾಗಿ ಹಿಂದಿನ ಕಾಲದಲ್ಲಿ ಒಂದು ಸಂಪ್ರದಾಯವಿತ್ತು. ಅಡುಗೆ ಮಾಡಿ, ದೇವರಿಗೆ ಅದನ್ನು ಅರ್ಪಿಸಿ, ಸುಮಾರು ಹತ್ತು ನಿಮಿಷ ಹೆಬ್ಬಾಗಿಲಿನಲ್ಲಿ ಕಾದು, ನಂತರ ಊಟ ಮಾಡುವುದು. ಏಕೆಂದರೆ ಈ ಸಮಯದಲ್ಲಿ ಯಾರಾದರೂ ಹಸಿದವರು ಮನೆಯ ಬೀದಿಯಲ್ಲಿ ಬಂದರೆ ಅವರಿಗೆ ಮೊದಲು ಊಟ ಬಡಿಸಿ, ಆನಂತರ ಯಜಮಾನ ಊಟಮಾಡುವುದು ಆಗಿನ ಪದ್ಧತಿಯಾಗಿತ್ತು. ಇಷ್ಟೇ ಅಲ್ಲದೆ ಇದಕ್ಕೂ ಮೊದಲು 'ಬಲಿಹರಣ' ಮಾಡುತ್ತಿದ್ದರು. ಮನೆಯ ಸುತ್ತಮುತ್ತಲಿನ ಪ್ರಾಣಿ-ಪಕ್ಷಿಗಳಿಗೆ ಆಹಾರ ನೀಡುವುದು 'ಬಲಿಹರಣ'. ಹೀಗೆ ಜೀವಮಾನದುದ್ದಕ್ಕೂ ಒಳ್ಳೆಯ ಕೆಲಸ ಮಾಡಿದರೆ ಅದರ ಫಲ ಸಾತ್ವಿಕವಾಗುತ್ತದೆ. ಇದರಿಂದ ಈ ಜನ್ಮದಲ್ಲಿ ಜ್ಞಾನ ಗಳಿಸಲು ಆಗದಿದ್ದರೂ ಕೂಡಾ, ಮುಂದಿನ ಜನ್ಮದಲ್ಲಿ ಆ ಅವಕಾಶ ಒದಗಿ ಬರುತ್ತದೆ. ಜ್ಞಾನವಿದ್ದೂ ದುಷ್ಕೃತಿಯಾಗಿ ಬದುಕಿದರೆ ಮತ್ತೆ ಹೀನಯೋನಿಯಲ್ಲಿ ಹುಟ್ಟಬೇಕಾಗುತ್ತದೆ.

ಹೋಮ-ಹವನ, ದಾನ-ದಕ್ಷಿಣೆ, ಬ್ರಾಹ್ಮಣಾರಾಧನೆ- ಎಲ್ಲವನ್ನೂ ಮಾಡಿ, 'ತಾನು ಎಲ್ಲರಿಗಿಂತ ಮಹಾನ್' ಎನ್ನುವ ಅಹಂಕಾರ ಬಂದರೆ ಅದು ರಜಸ್ಸಿನ ಕರ್ಮವಾಗುತ್ತದೆ. ಅದರ ಫಲ ಲೋಭ; ದುಃಖ ಬೆರೆತ ಜೀವನ. ಇದರಿಂದ ಪುಣ್ಯ ಕರ್ಮ ಮಾಡಿಯೂ ದುಃಖ ಅನುಭವಿಸಬೇಕಾಗುತ್ತದೆ. ಅಜ್ಞಾನದಿಂದ, ಯಾರದ್ದೋ ಒತ್ತಡಕ್ಕೆ ಮಾಡುವ ಕರ್ಮದಿಂದ ಎಂದೂ ಜ್ಞಾನ ಬೆಳೆಯುವುದಿಲ್ಲ. ತಿಳಿಗೇಡಿತನವೇ ತಮೋಗುಣದ ಕರ್ಮಫಲ.

ನಮ್ಮಲ್ಲಿ ಯಾವ ಗುಣ ಪೂರ್ಣವಾಗಿ ಜಾಗೃತವಾಗಿದೆ ಎಂದು ಹೇಗೆ ತಿಳಿಯುತ್ತದೆ ಎನ್ನುವುದರ ವಿವರಣೆಯನ್ನು, ಮುಂದಿನ ಶ್ಲೋಕದಲ್ಲಿ ಉಪಸಂಹಾರ ರೂಪದಲ್ಲಿ ಕೃಷ್ಣ ವಿವರಿಸಿದ್ದಾನೆ .

ಸತ್ತ್ವಾತ್ ಸಂಜಾಯತೇ ಜ್ಞಾನಂ ರಜಸೋ ಲೋಭ ಏವ ಚ ।
ಪ್ರಮಾದಮೋಹೌ ತಮಸೋ ಭವತೋಽಜ್ಞಾನಮೇವ ಚ ॥೧೭॥

ಸತ್ತ್ವಾತ್ ಸಂಜಾಯತೇ ಜ್ಞಾನಮ್ ರಜಸಃ ಲೋಭಃ ಏವ ಚ ।

ಪ್ರಮಾದ ಮೋಹೌ ತಮಸಃ ಭವತಃ ಅಜ್ಞಾನಮ್ ಏವ ಚ–ಸತ್ವದಿಂದ ತಿಳಿವು ತಿಳಿಯಾಗುತ್ತದೆ. ರಜಸ್ಸಿನಿಂದ ಜಿಪುಣತನ ಬೆಳೆಯುತ್ತದೆ. ತಮಸ್ಸಿನಿಂದ ಮೈಮರೆವು, ಭ್ರಾಂತಿ ಮತ್ತು ತಿಳಿಗೇಡಿತನ ಉಂಟಾಗುತ್ತದೆ.

"ಸತ್ತ್ವಾತ್ ಸಂಜಾಯತೇ ಜ್ಞಾನಮ್"- ಗೀತೆಯ ಈ ಸಾಲು ಬಹಳ ಮುಖ್ಯವಾದ ಸಂದೇಶವನ್ನು ಕೊಡುತ್ತದೆ. ಯಾವಾಗ ಮನುಷ್ಯನಿಗೆ ಉಳಿದ ಎಲ್ಲಾ ಸಂಗತಿಗಳಿಗಿಂತ ಜ್ಞಾನ ಮುಖ್ಯ, ಅದಕ್ಕಾಗಿ ನಾನು ಏನನ್ನಾದರೂ ಕಳೆದುಕೊಳ್ಳಲು ಸಿದ್ಧ ಎನ್ನುವ ದೃಢ ನಿರ್ಧಾರ ಬರುತ್ತದೋ- ಆಗ ನಾವು ನಿಸ್ಸಂದೇಹವಾಗಿ ಇದು ಸತ್ವಗುಣದ ಪೂರ್ಣ ಜಾಗೃತಾವಸ್ಥೆ ಎಂದು ತಿಳಿಯಬಹುದು. ಇದಕ್ಕೆ ಉತ್ತಮ ಉದಾಹರಣೆ ಕಠೋಪನಿಷತ್ತಿನಲ್ಲಿ ಬರುವ ಯಮ ಮತ್ತು ನಚಿಕೇತನ ಈ ಸಂಭಾಷಣೆ:

ಏತತ್ತುಲ್ಯಂ ಯದಿ ಮನ್ಯಸೇ ವರಂ ವೃಣೀಷ್ವ ವಿತ್ತಂ ಚಿರಜೀವಿಕಾಂ ಚ |
ಮಹಾಭೂಮೌ ನಚಿಕೇತಸ್ತ್ವಮೇಧಿ ಕಾಮಾನಾಂ ತ್ವಾ ಕಾಮಭಾಜಂ ಕರೋಮಿ. ||೧-೨೪ ||
ಯೇ ಯೇ ಕಾಮಾ ದುರ್ಲಭಾ ಮರ್ತ್ಯಲೋಕೇ ಸರ್ವಾನ್ ಕಾಮಾಂಶ್ಛಂದತಃ ಪ್ರಾರ್ಥಯಸ್ವ |
ಇಮಾ ರಾಮಾಃ ಸರಥಾಃ ಸತೂರ್ಯಾ ನ ಹೀದೃಶಾ ಲಂಭನೀಯಾ ಮನುಷ್ಯೈಃ |
ಆಭಿರ್ಮತ್ಪ್ರತ್ತಾಭಿಃ ಪರಿಚಾರಯಸ್ವ ನಚಿಕೇತೋ ಮರಣಂ ಮಾಽನುಪ್ರಾಕ್ಷೀಃ||೧-೨೫||

ಇಲ್ಲಿ "ನನಗೆ ಆತ್ಮ ಜ್ಞಾನವನ್ನು ಬೋಧಿಸು" ಎಂದು ನಚಿಕೇತ ಯಮನನ್ನು ಕೇಳಿದಾಗ: "ನೀನಿನ್ನೂ ಚಿಕ್ಕವನು, ಆ ವಿದ್ಯೆ ಬೇಡ. ಅದಕ್ಕೆ ಬದಲಾಗಿ ನಿನ್ನನ್ನು ಭೂಮಂಡಲದ ಚಕ್ರವರ್ತಿಯನ್ನಾಗಿ ಮಾಡುತ್ತೇನೆ; ನೀನು ಬಯಸಿದ್ದು ಸಿಗುವಂತೆ ಮಾಡುತ್ತೇನೆ; ಆಯುಷ್ಯ ಐಶ್ವರ್ಯವನ್ನು ಕೊಡುತ್ತೇನೆ" ಎಂದು ಜವರಾಯ ನುಡಿಯುತ್ತಾನೆ. ಆಗ ನಚಿಕೇತ ಹೀಗೆ ಹೇಳುತ್ತಾನೆ:

ಶ್ವೋಭಾವಾ ಮರ್ತ್ಯಸ್ಯ ಯದಂತಕೈತತ್ ಸರ್ವೇಂದ್ರಿಯಾಣಾಂ ಜರಯಂತಿ ತೇಜಃ |
ಅಪಿ ಸರ್ವಂ ಜೀವಿತಮಲ್ಪಮೇವ ತವೈವ ವಾಹಾಸ್ತವ ನೃತ್ಯಗೀತೇ ||೧-೨೬||
ನ ವಿತ್ತೇನ ತರ್ಪಣೀಯೋ ಮನುಷ್ಯೋ ಲಪ್ಸ್ಯಾಮಹೇ ವಿತ್ತಮದ್ರಾಕ್ಷ್ಮ ಚೇತ್ತ್ವಾ |
ಜೀವಿಷ್ಯಾಮೋ ಯಾವದೀಶಿಷ್ಯಸಿ ತ್ವಂ ವರಸ್ತು ಮೇ ವರಣೀಯಃ ಸ ಏವ ||೧-೨೭||
ಅಜೀರ್ಯತಾಮಮೃತಾನಾಮುಪೇತ್ಯ ಜೀರ್ಯನ್ಮರ್ತ್ಯಃ ಕ್ವಧಃಸ್ಥಃ ಪ್ರಜಾನನ್ |
ಅಭಿಧ್ಯಾಯನ್ ವರ್ಣರತಿಪ್ರಮೋದಾನ್ ಅತಿದೀರ್ಘೇ ಜೀವಿತೇ ಕೋ ರಮೇತ ||೧-೨೮||
ಯಸ್ಮಿನ್ನಿದಂ ವಿಚಿಕಿತ್ಸಂತಿ ಮೃತ್ಯೋ ಯತ್ಸಾಂಪರಾಯೇ ಮಹತಿ ಬ್ರೂಹಿ ನಸ್ತತ್ |
ಯೋಽಯಂ ವರೋ ಗೂಢಮನುಪ್ರವಿಷ್ಟೋ ನಾನ್ಯಂ ತಸ್ಮಾನ್ನಚಿಕೇತಾ ವೃಣೀತೇ ||೧-೨೯||

"ನೀನು ಎಷ್ಟೇ ಕೊಟ್ಟರೂ ಅದು ಅಲ್ಪ. ಎಷ್ಟೇ ಆಯುಸ್ಸು ಪಡೆದರೂ ನಾವೊಂದು ದಿನ ಸಾಯಬೇಕು. ಆದ್ದರಿಂದ ಇದ್ಯಾವುದೂ ನನಗೆ ಬೇಡ. ನೀನು ಇಡೀ ಜಗತ್ತನ್ನು ನನಗೆ ಧಾರೆಯೆರೆದರೂ ಅದು ನನಗೆ ಬೇಡ. ನನಗೆ ಜ್ಞಾನ ಬೇಕು. ಆ ಆತ್ಮಜ್ಞಾನವಿದ್ಯೆಯನ್ನೇ ತಿಳಿಸಿಕೊಡು" ಎಂದು. ಇದು ಯಾವ ಪ್ರಲೋಭನೆಗೂ ಒಳಗಾಗದ ನಿಜವಾದ ಸತ್ವ. ಜ್ಞಾನ ಸಾಧನೆಯ ನಿಜವಾದ ಹಸಿವುಳ್ಳವರು ಎಲ್ಲವನ್ನೂ ಕಳೆದುಕೊಳ್ಳಲು ಸಿದ್ಧರಾಗಿ ಹೇಗೆ ಜ್ಞಾನಮಾರ್ಗದಲ್ಲಿ ಸಾಗುತ್ತಾರೆ ಎನ್ನುವುದಕ್ಕೆ ಇತ್ತೀಚೆಗಿನ ಉತ್ತಮ ಉದಾಹರಣೆ- ಸ್ವಾಮಿರಾಮ್ (1925–

1996). ಅವರ ಜೀವನ ಚರಿತ್ರೆಯನ್ನು ನಾವು 'Lliving with the Himalayan Masters' ಎನ್ನುವ ಪುಸ್ತಕದಲ್ಲಿ ಓದಿ ತಿಳಿಯಬಹುದು. ಶಾಸ್ತ್ರ ಓದಿದರೂ ಶಾಸ್ತ್ರದ ಯಥಾರ್ಥ ಜ್ಞಾನ ಬರಬೇಕಿದ್ದರೆ ನಮ್ಮೊಳಗೆ ಸಾತ್ವಿಕತೆ ಇರಬೇಕು. ಅ-ಕಾರ ವಾಚ್ಯನಾದ ಭಗವಂತನ ಜ್ಞಾನ ಬರುವುದು ಸತ್ವಗುಣವಿದ್ದಾಗ ಮಾತ್ರ. ಸತ್ವಗುಣ ಪೂರ್ಣ ಜಾಗೃತವಾದಾಗ ನಮಗೆ ಯಥಾರ್ಥಜ್ಞಾನ ತಿಳಿಯುತ್ತದೆ ಮತ್ತು ಉಳಿದ ಎಲ್ಲಾ ಪ್ರಾಪಂಚಿಕ ಸಂಗತಿ ಜ್ಞಾನದ ಮುಂದೆ ಶೂನ್ಯ ಎನ್ನುವ ಸತ್ಯ ತಿಳಿಯುತ್ತದೆ.

"ರಜಸೋ ಲೋಭ ಏವ ಚ"- ಲೋಭ ಎನ್ನುವುದು ರಜಸ್ಸಿನ ಮೀಸಲಾದ ಗುಣ(Exclusive Quality). ಇದನ್ನು ಸಾತ್ವಿಕರಲ್ಲಿ ಕಾಣಲು ಸಾಧ್ಯವಿಲ್ಲ. ಯಾವುದೋ ಒಂದು ವಸ್ತುವಿನ ಬಗ್ಗೆ ಕಾಮ, ಆ ವಸ್ತು ಸಿಗದಿದ್ದಾಗ ಕ್ರೋಧ, ಸಿಕ್ಕಿದಾಕ್ಷಣ –ಲೋಭ. ಅದನ್ನು ಉಪಯೋಗಿಸುವುದೂ ಇಲ್ಲ, ಇನ್ನೊಬ್ಬರಿಗೆ ಕೊಡುವುದೂ ಇಲ್ಲ. ದಾನ ಎನ್ನುವುದು ಇವರಿಗೆ ಬಲು ದೂರ! ನಾವು ನಮ್ಮ ಹತ್ತಿರ ಏನಿದೆಯೋ ಅದನ್ನು ಹಂಚಿ ಬದುಕಬೇಕು ಎನ್ನುವುದು ಸತ್ವ. ಇದನ್ನು ಈಶೋಪನಿಷತ್ತಿನಲ್ಲಿ ಬಹಳ ಸುಂದರವಾಗಿ ಹೇಳಿದ್ದಾರೆ:

ಈಶಾವಾಸ್ಯಮಿದಂ ಸರ್ವಂ ಯತ್ಕಿಂಚ ಜಗತ್ಯಾಂ ಜಗತ್ ।
ತೇನ ತ್ಯಕ್ತೇನ ಭುಂಜೀಥಾ ಮಾ ಗೃಧಃ ಕಸ್ಯಸ್ವಿದ್ಧನಂ ॥ ೧ ॥

ಭಗವಂತ ಎಲ್ಲವುದಕ್ಕೂ ಸ್ವಾಮಿ. ಅವನು ಕೊಟ್ಟದ್ದನ್ನು ನಾವು ಅನುಭವಿಸಬೇಕು. ಇಲ್ಲದ ಸಂಪತ್ತಿಗಾಗಿ ಆಸೆಪಡಬಾರದು. ಜಗತ್ತಿನ ಸರ್ವ ಸಂಪತ್ತಿನ ಒಡೆಯ ಆ ಭಗವಂತ. ಆದ್ದರಿಂದ ಆತ ಕೊಟ್ಟಿರುವ ಸಂಪತ್ತನ್ನು 'ನನ್ನದು' ಎಂದುಕೊಂಡು ಲೋಭದಿಂದ ಬದುಕುವುದು ಸರಿಯಲ್ಲ. ಆದರೆ ರಜೋಗುಣದ ಬಹಳ ಮುಖ್ಯ ದೋಷ ಈ ಲೋಭ. ಇದು ಇನ್ನೊಬ್ಬರ ಬಗ್ಗೆ ಸಹಾನುಭೂತಿ ಇಲ್ಲದೆ, ತಾನು ಗಳಿಸಿದ್ದನ್ನು ಇನ್ನೊಬ್ಬರಿಗೆ ಕೊಡದೇ, ಕೆಲವೊಮ್ಮೆ ತಾನೂ ತಿನ್ನದೆ ಮುಚ್ಚಿಡುವಂತೆ ಮಾಡುತ್ತದೆ. ಸಾಮಾನ್ಯವಾಗಿ ಪ್ರಾಣಿಗಳಲ್ಲೂ ಇಲ್ಲದ ಕೆಟ್ಟ ಗುಣ ಈ ಲೋಭ. ನಮ್ಮಲ್ಲಿ ಲೋಭದ ಲಕ್ಷಣವಿದ್ದರೆ ಅದು ರಜೋಗುಣದ ಜಾಗೃತಾವಸ್ಥೆ ಎನ್ನುವುದನ್ನು ನಾವು ಅರಿಯಬೇಕು.

"ಪ್ರಮಾದಮೋಹೌ ತಮಸೋ ಭವತೋಽಜ್ಞಾನಮೇವ ಚ". ಹೇಗೆ ರಜೋಗುಣದಿಂದ ಲೋಭವೋ, ಹಾಗೆ ತಮೋಗುಣದಿಂದ ಪ್ರಮಾದ ಮತ್ತು ಮೋಹ-ಅದರಿಂದ ತಿಳಿಗೇಡಿತನ. ಒಬ್ಬರನ್ನು ಅತಿಯಾಗಿ ಹಚ್ಚಿಕೊಳ್ಳುವುದು, ಅದರಿಂದ ಅವರು ಮಾಡುವ ತಪ್ಪುಗಳನ್ನು ಕ್ಷಮಿಸುವುದು, ಅವರು ಹೇಳಿದಂತೆ ಕುಣಿಯುವುದು, ಇತ್ಯಾದಿ. ಇದು ಎಷ್ಟು ಪ್ರಭಾವಶಾಲಿ ಎಂದರೆ- ಇದು ನಮ್ಮ ಜ್ಞಾನವನ್ನೂ ಕೂಡಾ ಮುಚ್ಚಿಸಿ, ನಮ್ಮನ್ನು ತಪ್ಪು ದಾರಿಯಲ್ಲಿ ಕರೆದೊಯ್ಯುತ್ತದೆ. ಇದಕ್ಕೆ ಉತ್ತಮ ಉದಾಹರಣೆ ಭಾಗವತದ ಆರನೇ ಸ್ಕಂದದ ಮೊದಲ ಅಧ್ಯಾಯದಲ್ಲಿ ಬರುವ ಅಜಾಮಿಳನ ಕಥೆ. ಈತ ಒಬ್ಬ ಸಾತ್ವಿಕ ಬ್ರಾಹ್ಮಣ. ಆತನಿಗೆ ಮದುವೆಯಾಗಿತ್ತು. ಒಮ್ಮೆ ಪೂಜೆಗೆ ಹೂ-ತುಳಸಿ ತರಲು ಕಾಡಿಗೆ ಹೋದಾಗ ಕಂಡ ಒಂದು ದೃಶ್ಯ ಆತನ ಮನಸ್ಸಿನ ಮೇಲೆ ಗಾಢವಾದ ಪರಿಣಾಮ ಬೀರಿತು. ತಾನು ಕಾಡಿನಲ್ಲಿ ಕಂಡ ಯುವತಿಯನ್ನು ಆತ ಮೋಹಿಸಲಾರಂಭಿಸಿದ. ಆಕೆಗಾಗಿ ಮದ್ಯ-ಮಾಂಸಾಹಾರದಲ್ಲಿ ತೊಡಗಿದ. ಆಕೆಯ ಬಯಕೆಗಳನ್ನು ತೀರಿಸಲು ಕಳ್ಳತನ ಮಾಡಿದ. ಸಾತ್ವಿಕನಾಗಿದ್ದ ಒಬ್ಬ ವಿಪ್ರ-ಪೂರ್ಣ ತಾಮಸನಾದ. ಈ ಕಥೆಯನ್ನು ಮನಃಶಾಸ್ತ್ರೀಯವಾಗಿ ನೋಡಿದರೆ- ಈ ರೀತಿ ಘಟನೆ ಏಕೆ ನಡೆಯಿತು ಎನ್ನುವುದು ತಿಳಿಯುತ್ತದೆ. ಅಜಾಮಿಳ ಮದುವೆಯಾಗಿದ್ದ, ಆದರೆ ಆತನ ಮನೆಯಲ್ಲಿ ಮಡಿ-ಮೈಲಿಗೆ ಎನ್ನುವ ಅನೇಕ ಕರ್ಮಾಚರಣೆಯಿಂದಾಗಿ ಆತ ತನ್ನಲ್ಲಿನ ಅಂತರಂಗದ

ಬಯಕೆಯನ್ನು ಬಲವಂತವಾಗಿ ನಿಗ್ರಹಿಸಿದ್ದ. ನಾವು ನಮ್ಮ ಬಯಕೆಯನ್ನು ಬಲವಂತವಾಗಿ ತಡೆಹಿಡಿದರೆ ಅದು ಒಂದಲ್ಲ ಒಂದು ದಿನ ಸ್ಫೋಟವಾಗಿ ಹೊರಬರುತ್ತದೆ. ಈ ಕಾರಣದಿಂದಾಗಿ ಶಾಸ್ತ್ರಕಾರರು ಹೇಳುವಂತೆ "ಅಧ್ಯಾತ್ಮ ಸಾಧನೆ ಮಾಡುವ ಮೊದಲು ನಿನಗೆ ಸಾಂಸಾರಿಕ ಸುಖದ ಮೋಹವಿದ್ದರೆ ಅದನ್ನು ಅನುಭವಿಸು, ಅದರ ನಿಸ್ಸಾರವನ್ನು ಅರಿ, ಆಗ ಸಾಧನೆ ಸುಲಭ" ಎಂದು. ಅಜಾಮಿಳ ಶಾಸ್ತ್ರ ಓದಿದ್ದ, ಆದರೂ ಆತ ಮೋಹಕ್ಕೆ ಬಲಿಯಾದ. ಅದರಿಂದ ಆತನ ಎಲ್ಲಾ ಜ್ಞಾನವೂ ಮರೆಯಾಯಿತು. ತಮೋಗುಣ ಆತನಲ್ಲಿ ಮಾಡಬಾರದ ತಪ್ಪನ್ನು ಮಾಡಿಸಿತು. ಇದು ತಮೋಗುಣ ನಮ್ಮಲ್ಲಿ ಪ್ರಬಲವಾದಾಗ ನಮ್ಮ ಮೇಲೆ ಆಗುವ ಪರಿಣಾಮ.

ಈ ಶ್ಲೋಕದಲ್ಲಿ ಕೃಷ್ಣ ನಮ್ಮಲ್ಲಿ ಯಾವ ಗುಣ ಕೆಲಸ ಮಾಡುತ್ತಿದೆ ಎನ್ನುವುದನ್ನು ಸ್ಪಷ್ಟ ರೂಪುರೇಷೆಯಿಂದ ವಿವರಿಸಿದ. ಈ ಶ್ಲೋಕದ ಸಂಗ್ರಹ ಸಾರಾಂಶ ಇಷ್ಟು: ಜ್ಞಾನದ ತೃಷೆ ಇದ್ದರೆ ಅದು ಸಾತ್ವಿಕ ಗುಣ; ನನಗೇ ಬೇಕು ಉಳಿದವರಿಗೆ ಸಿಗಬಾರದು ಎನ್ನುವ ಲೋಭವಿದ್ದರೆ ಅದು ರಜಸ್ಸು; ಯಾವುದೋ ಒಂದು ಭೌತಿಕ ವಸ್ತುವಿನ ಮೇಲೆ ಅತಿಯಾದ ಮಮತೆ, ಮೋಹ ಬೆಳೆದರೆ ಅದು ತಮಸ್ಸಿನ ಕೆಲಸ.

ಸತ್ವ-ರಜಸ್ಸು-ತಮಸ್ಸುಗಳಿಗೆ ಇನ್ನೊಂದು ಮುಖವಿದೆ. ಪೂಜೆಯಲ್ಲಿ ನವಶಕ್ತಿಗಳನ್ನು ಹೇಳಿದ ಮೇಲೆ ಭಗವಂತನನ್ನು ಅನುಸಂಧಾನ ಮಾಡುವ ಮುಂಚೆ "ಸಂ ಸತ್ತ್ವಾಯ ನಮಃ –ರಂ-ರಜಸೇ ನಮಃ-ತಂ ತಮಸೇ ನಮಃ" ಎನ್ನುವ ಒಂದು ಮಂತ್ರ ಹೇಳುತ್ತಾರೆ. ಈ ಮಂತ್ರವನ್ನು ಕೆಲವರು ಈ ರೀತಿ ಕೂಡಾ ಹೇಳುತ್ತಾರೆ: "ಸಂ ಸತ್ತ್ವಾಯ ಶ್ರಿಯೋ ನಮಃ-ರಂ ರಜಸೇ ಭೂವೇ ನಮಃ-ತಂ ತಮಸೇ ದುರ್ಗಾಯ ನಮಃ" ಎಂದು. [ಇದು ಮಂತ್ರವಲ್ಲ, ಮೂಲರೂಪದ ಮಂತ್ರ: "ಸಂ ಸತ್ತ್ವಾಯ ನಮಃ –ರಂ-ರಜಸೇ ನಮಃ-ತಂ ತಮಸೇ ನಮಃ" ] ಇಲ್ಲಿ ಸಂ ಸತ್ವಾಯ ನಮಃ ಎಂದರೆ ಸತ್ವಗುಣಕ್ಕೆ ನಮಸ್ಕಾರ ಮಾಡುವುದಲ್ಲ- ಸತ್ವ ಮಾನಿನಿಯಾದ ಶ್ರೀದೇವಿಗೆ ನಮಸ್ಕಾರ ಮಾಡುವುದು. ರಂ ರಜಸೇ ನಮಃ ಎಂದರೆ ರಜೋ ಮಾನಿನಿಯಾದ ಭೂದೇವಿಗೆ ನಮಸ್ಕಾರ. ತಂ ತಮಸೇ ನಮಃ ಎಂದರೆ ತಮೋ ಮಾನಿನಿಯಾದ ದುರ್ಗಾ ದೇವಿಗೆ ನಮಸ್ಕಾರ. ಇವು ಲಕ್ಷ್ಮಿಯ ಮೂರು ರೂಪಗಳು. ಲಕ್ಷ್ಮಿಯ ಮೂಲ ರೂಪಕ್ಕೆ 'ಮಹಾಲಕ್ಷ್ಮಿ' ಎನ್ನುತ್ತಾರೆ. ಈ ಮೂಲರೂಪದಿಂದ ಮೂರು ಆವೇಶ ರೂಪಗಳು.

ಇಲ್ಲಿ ಸತ್ವವನ್ನು ಜಾಗೃತಗೊಳಿಸುವವಳು ಶ್ರೀದೇವಿ; ರಜಸ್ಸನ್ನು ಜಾಗೃತಗೊಳಿಸುವವಳು ಭೂದೇವಿ; ತಮೋಗುಣವನ್ನು ಜಾಗೃತಗೊಳಿಸುವವಳು ತಮೋಮಾನಿನಿಯಾದ ದುರ್ಗಾದೇವಿ. "ಸತ್ತ್ವಾತ್ ಸಂಜಾಯತೇ ಜ್ಞಾನಮ್"- ಅಂದರೆ: ಸತ್ವಗುಣದ ಅಭಿಮಾನಿನಿಯಾದ ಲಕ್ಷ್ಮಿ ಜ್ಞಾನಪ್ರದಳು ಎಂದರ್ಥ. ನಾರಾಯಣನ ಜ್ಞಾನ ಬರಬೇಕಾದರೆ ಶ್ರೀದೇವಿಯ ಅನುಗ್ರಹಬೇಕು. 'ಶ್ರೀ' ಸಂಪತ್ತನ್ನು ಕೊಡುತ್ತಾಳೆ ಎನ್ನುವ ವಿಚಾರ ಎಲ್ಲರಿಗೂ ಗೊತ್ತು. ಆದರೆ ಜ್ಞಾನವೆಂಬ ಮಹಾ ಸಂಪತ್ತನ್ನು ಕೊಡುವವಳು ಶ್ರೀದೇವಿ ಎನ್ನುವ ವಿಚಾರ ಹೆಚ್ಚಿನವರಿಗೆ ತಿಳಿದಿಲ್ಲ. ದುಡ್ಡು ಸಂಪತ್ತು ಹೌದು, ಆದರೆ ಜ್ಞಾನ ಮಹಾಸಂಪತ್ತು-ಅದನ್ನು ಕೊಡುವವಳು 'ಶ್ರೀ'. ನಮ್ಮೊಳಗೆ ಜ್ಞಾನ ಜಾಗೃತವಾಗಬೇಕಾದರೆ ಮೊದಲು ತಾಯಿಯ 'ಶ್ರೀ' ರೂಪವನ್ನು ಉಪಾಸನೆ ಮಾಡಬೇಕು. ಭಗವಂತನ ಜ್ಞಾನವನ್ನು ಕರುಣಿಸು ಎಂದು ಆಕೆಯನ್ನು ಬೇಡಬೇಕು.

ಶಾಸ್ತ್ರಕಾರರು ಹೇಳುವಂತೆ ಮನಸ್ಸು ಭಗವಂತನತ್ತ ಹರಿಯುವುದಕ್ಕೆ ಮೊದಲು ನಾವು ಮನೋಽಭಿಮಾನಿಯನ್ನು ಪ್ರಾರ್ಥಿಸಬೇಕು. ಶಿವ-ಮನೋಽಭಿಮಾನಿ ದೇವತೆ. [ಗರುಡ-ಸುಪರ್ಣಿ, ಶೇಷ-ವಾರುಣಿ ಮತ್ತು ಶಿವ-ಪಾರ್ವತಿ ಇವರು ಮನೋಭಿಮಾನಿಯಾದರೂ ಸಹ ವಿಶೇಷತಃ ಶಿವ ಮನೋಽಭಿಮಾನಿ]

ಜ್ಞಾನ ಬೇಕು ಅನ್ನುವವರ ಮನಸ್ಸಿನ ತಮೋಗುಣವನ್ನು, ಕತ್ತಲೆಯನ್ನು ಓಡಿಸಿ ಬೆಳಕು ತುಂಬುವವರು ಶಿವ-ಪಾರ್ವತಿಯರು. ಈ ಕಾರಣಕ್ಕಾಗಿ ಜ್ಞಾನಕ್ಕೋಸ್ಕರ ಮೊದಲು ನಾವು ಪ್ರಾರ್ಥನೆ ಮಾಡಬೇಕಾಗಿರುವುದು ಶಿವತತ್ವವನ್ನು. ಶಿವ ಜ್ಞಾನ ಕೊಟ್ಟ ಮೇಲೆ ಅದು ಚಿತ್ತದಲ್ಲಿ ಸ್ಮರಣಶಕ್ತಿಯಾಗಿ ಉಳಿಯಲು ನಾವು ಪ್ರಾರ್ಥಿಸಬೇಕಾಗಿರುವುದು ಪ್ರಾಣಶಕ್ತಿಯನ್ನು(ಬ್ರಹ್ಮ-ವಾಯು, ಸರಸ್ವತಿ-ಭಾರತಿ). ನಮಗೆ ಬಂದ ಜ್ಞಾನ ಮರೆಯಾಗದಂತೆ(ಸ್ಥಿರವಾಗುವಂತೆ) ಮಾಡುವ ಪ್ರಮುಖ ಶಕ್ತಿ ಪ್ರಾಣಶಕ್ತಿ (ಆಂಜನೇಯ). ಈ ರೀತಿ ಸ್ಥಿರವಾದದ್ದು ಮತ್ತೆ ಎತ್ತರಕ್ಕೆ ಹೋಗಿ ಭಗವಂತನನ್ನು ಮುಟ್ಟುವಂತೆ ಮಾಡುವವಳು-ಸದಾ ಭಗವಂತನ ಜೊತೆಗಿರುವ ಲಕ್ಷ್ಮೀದೇವಿ. ಇಂತಹ ಲಕ್ಷ್ಮಿ ತನ್ನ ಎಲ್ಲಾ ರೂಪದಲ್ಲಿ ಅರಿವನ್ನು ಕೊಡುವುದಿಲ್ಲ. ಆಕೆ ತನ್ನ ಶ್ರೀರೂಪದಲ್ಲಿ ಜ್ಞಾನರೂಪವಾದ ಸಂಪತ್ತನ್ನು ಕರುಣಿಸುತ್ತಾಳೆ. 'ಶ್ರೀ' ಮಹಾಲಕ್ಷ್ಮಿಯ ಅವತಾರಗಳಲ್ಲಿ ಒಂದು. ಸತ್ವವನ್ನು ನಿಯಮನ ಮಾಡಿ ಜಗತ್ತಿನ ರಕ್ಷಣೆಗೆ ವಿಷ್ಣುವಿನ ಜೊತೆಗೆ ಪಣತೊಟ್ಟು ನಿಂತ ರೂಪವಿದು. ಆದ್ದರಿಂದ ಜ್ಞಾನ ಮಾರ್ಗದಲ್ಲಿ ಸಾಗುವವರಿಗೆ ಮುಖ್ಯವಾದುದು ಲಕ್ಷ್ಮಿಯ ಶ್ರೀ ನಾಮಕ ಅನುಗ್ರಹ.

ಇಲ್ಲಿ ನಾವು ಶಿವ, ಪ್ರಾಣದೇವರು ಮತ್ತು ಶ್ರೀದೇವಿ ಅನುಗ್ರಹದಿಂದ ಜ್ಞಾನಮಾರ್ಗದಲ್ಲಿ ಮುನ್ನಡೆದು ಭಗವಂತನನ್ನು ಸೇರಬಹುದು ಎನ್ನುವುದನ್ನು ವಿಶ್ಲೇಷಿಸಿದೆವು. ಮುಂದೆ ಭೂತತ್ವದ ಬಗ್ಗೆ ವಿಶ್ಲೇಷಿಸುವ ಮೊದಲು ಶಾಂತಿಮಂತ್ರ ಮತ್ತು ಗಣಪತಿಯ ಪ್ರಾರ್ಥನೆಯ ಮಹತ್ವವನ್ನು ಸಂಕ್ಷಿಪ್ತವಾಗಿ ಇಲ್ಲಿ ವಿಶ್ಲೇಷಿಸೋಣ. ಯಾವುದೇ ಶಾಸ್ತ್ರವನ್ನು ಓದುವ ಮೊದಲು "ಓಂ ಶಾಂತಿಃ ಶಾಂತಿಃ ಶಾಂತಿಃ" ಎಂದು ಶಾಂತಿ ಮಂತ್ರ ಪಠಿಸುತ್ತೇವೆ. ಜ್ಞಾನಾನಂದಗಳ ಪರಾಕಾಷ್ಠೆಯಾದ ಭಗವಂತನೇ, ನನ್ನನ್ನು ಜ್ಞಾನಾನಂದಗಳ(ಶಾ+ಅಂತಿ) ದಾರಿಯಲ್ಲಿ ನಡೆಸು ಎನ್ನುವುದು ಈ ಶಾಂತಿ ಮಂತ್ರದ ಅರ್ಥ. ಇದೇ ರೀತಿ, ಪ್ರತೀ ಪೂಜೆಯಲ್ಲಿ ಮೊದಲು ಗಣಪತಿ ಪ್ರಾರ್ಥನೆ ಮಾಡುತ್ತೇವೆ. ಏಕೆಂದರೆ ಶಿವ-ಪಾರ್ವತಿ ಪುತ್ರ ಗಣಪತಿ ಆಕಾಶದ ದೇವತೆ. ಈ ಆಕಾಶ ಭಗವಂತನ ನಾಭಿಯಿಂದ ಸೃಷ್ಟಿಯಾಗಿದೆ. ಆದ್ದರಿಂದ ಗಣಪತಿ ನಮ್ಮ ನಾಭಿ ದೇವತೆ.

ನಾಭ್ಯ ಆಸೀದಂತರಿಕ್ಷಂ ಶೀರ್ಷ್ಣೋ ದ್ಯೌಃ ಸಮವರ್ತತ
ಪದ್ಭ್ಯಾಂ ಭೂಮೀರ್ ದಿಶ ಶ್ರೋತ್ರಾತ್ ತತಾ ಲೋಕಾ ಅಕಲ್ಪಯನ್

ನಮ್ಮ ನಾಭಿಯ ಸಮೀಪ ಇರುವ ಮೂರು ಚಕ್ರಗಳು-ಮೂಲಾಧಾರ, ಸ್ವಾದಿಷ್ಠಾನ ಹಾಗೂ ಮಣಿಪುರ. ನಾಭಿಯಿಂದ ಮೇಲಕ್ಕೆ ಹೃತ್ಕಮಲದಲ್ಲಿ ನಿಜವಾದ ಸಾಧನೆಯ ಅನಾಹತ ಚಕ್ರವಿದೆ. ಮೂಲಾಧಾರ, ಸ್ವಾದಿಷ್ಠಾನ ಹಾಗೂ ಮಣಿಪುರ ಚಕ್ರಗಳನ್ನು ಮೀರಿ ಹೃದಯವನ್ನು ಪ್ರವೇಶಿಸಬೇಕಾದರೆ ನಾಭಿಯ ಬಾಗಿಲನ್ನು ಗಣಪತಿ ತೆರೆಯಬೇಕು. ಅದಕ್ಕಾಗಿ ನಾವು ಗಣಪತಿಯಲ್ಲಿ ಮೊತ್ತಮೊದಲಿಗೆ ಪ್ರಾರ್ಥನೆ ಮಾಡುತ್ತೇವೆ. ಪ್ರತೀ ಯಜ್ಞದ ಮೊದಲು ಗಣಪತಿ ಮಂಡಲ ಬರೆದು ಪೂಜಿಸಿ, ಆನಂತರ ಯಜ್ಞ ಪ್ರಾರಂಭಿಸುತ್ತಾರೆ. ಗಣಪತಿ ನಾಭಿಯ ಬಾಗಿಲನ್ನು ತೆರೆದಾಗ ಹೃತ್ಕಮಲ ತಾನೇ-ತಾನಾಗಿ ತೆರೆದುಕೊಳ್ಳುತ್ತದೆ. ಈ ಸ್ಥಿತಿಯನ್ನು 'ವೃಷಾಹ' ಎನ್ನುತ್ತಾರೆ. ಭಗವಂತ ಈ ಸ್ಥಿತಿಯಲ್ಲಿ ನಮ್ಮ ಪೂಜೆಯನ್ನು ವೃಷಾಹೀಯಾಗಿ ಸ್ವೀಕರಿಸುತ್ತಾನೆ. ಇಂತಹ ಭಗವಂತನನ್ನು 'ವೃಷಾಹೀ' ಎಂದೂ ಕರೆಯುತ್ತಾರೆ.

"ರಜಸೋ ಲೋಭ ಏವ ಚ"- ರಜಸ್ಸು ಎಂದರೆ ರಜೋಗುಣದ ಅಭಿಮಾನಿನಿಯಾದ 'ಭೂದೇವಿ'. ಇಲ್ಲಿ ಭೂದೇವಿ ಎಂದರೆ ಭೂಮಿಯ ನಿಯಮನ ಮಾಡುವ ಹದಿನೆಂಟನೇ ಕಕ್ಷೆಯಲ್ಲಿರುವ ದೇವತೆ ಅಲ್ಲ. ಅವಳನ್ನೂ ನಿಯಮನ

ಮಾಡುವ ಲಕ್ಷ್ಮಿಯ ಆವೇಶರೂಪ 'ಭೂ'. ಅದು ಸೃಷ್ಟಿಗೆ ಕಾರಣವಾದದ್ದು. ರಂಜನೆ, ಆಕರ್ಷಣೆ, ಸೆಳೆತ, ಮೋಹ – ಇವೆಲ್ಲವೂ ರಜೋಗುಣದ ಮುಖಗಳು. ಹಾಗಾಗಿ ಒಬ್ಬರನ್ನು ಒಬ್ಬರು ಪ್ರೀತಿಸುವುಕ್ಕೆ ಮೂಲಭೂತವಾಗಿ ಬೇಕಾಗಿರುವುದು-ರಂಜನ. ಗಂಡು-ಹೆಣ್ಣಿನ ಸೆಳೆತವೇ ಸೃಷ್ಟಿಗೆ ಕಾರಣವಾದದ್ದು. ಸೃಷ್ಟಿಗೆ ಬೇಕಾದ ಸೆಳೆತ ಕೊಟ್ಟು ಸೃಷ್ಟಿ ಮಾಡುವ, ಅದೇ ಸೆಳೆತದಿಂದ ದಾರಿ ತಪ್ಪಿಸುವ ಅಂಶ ರಜೋಗುಣದಲ್ಲಿದೆ. ಅಂತಹ ರಜೋಗುಣದ ಸ್ವಭಾವವನ್ನು ಕೊಡುವವಳು ಭೂದೇವಿ. ನನ್ನ ಆಸ್ತಿ, ನನ್ನ ಮನೆ, ನನ್ನ ದುಡಿಮೆ, ನನ್ನ ಹಣ, ಇತ್ಯಾದಿ ಮೋಹ ರಜೋಗುಣದಿಂದ ಬರುವಂತಾದ್ದು.

"ಪ್ರಮಾದ ಮೋಹೌ ತಮಸಃ ಭವತಃ ಅಜ್ಞಾನಮ್ ಏವ ಚ"- ಭೌತಿಕವಾಗಿ ನಮ್ಮನ್ನು ವಿನಾಶದತ್ತ ಕೊಂಡೊಯ್ಯುವ–ಸಂಹಾರ ಶಕ್ತಿಯಾದ, ತಮೋಗುಣದ ಅಭಿಮಾನಿನಿ ದುರ್ಗೆ. ಆಕೆ ಸಂಹಾರದ ಕಡೆಗೆ ಹೋಗುವ ಬುದ್ಧಿ ಕೊಡುತ್ತಾಳೆ. ತಪ್ಪನ್ನೇ ಸರಿ ಎಂದು ತಿಳಿದು ತಪ್ಪು ಮಾಡುವುದು, ಅದರಿಂದ ಜಾರಿ ಬೀಳುವುದು, ವಿಪರೀತ ಜ್ಞಾನ, ಜ್ಞಾನದ ಅಭಾವ, ಇತ್ಯಾದಿ–ತಮೋಗುಣದ ಪ್ರಭಾವದಿಂದ ಬರುವಂತಾದ್ದು.

ಹೀಗೆ ಚಿತ್ಪ್ರಕೃತಿಯ ಮೂರು ಆವೇಶರೂಪಗಳಾದ ಶ್ರೀ-ಭೂ-ದುರ್ಗ, ಸತ್ವ-ರಜಸ್ಸು-ತಮಸ್ಸಿನ ಅಭಿಮಾನಿನಿಯರಾಗಿ, ತ್ರಿಗುಣಗಳ ಮೂಲಕ ನಮ್ಮನ್ನು ಬಂಧಿಸುತ್ತಾರೆ. ಆದ್ದರಿಂದ ಚಿತ್ಪ್ರಕೃತಿಯ ಚೈತನ್ಯದ ಮೂರು ರೂಪಗಳೇ ಸತ್ವ-ರಜಸ್ಸು ಮತ್ತು ತಮಸ್ಸು. [ಏಕೆ ಇಲ್ಲಿ ಈ ಅರ್ಥವನ್ನು ಮಾಡಬೇಕು ಎನ್ನುವುದಕ್ಕೆ ಗೀತೆಯಲ್ಲೇ ಸುಳಿವಿದೆ. ಅದನ್ನು ಮುಂದೆ ಈ ಅಧ್ಯಾಯದ ೧೯ನೇ ಶ್ಲೋಕದಲ್ಲಿ ಕಾಣಬಹುದು. ಮಹಾಲಕ್ಷ್ಮಿಯ ಶ್ರೀ-ಭೂ-ದುರ್ಗಾ ರೂಪದ ಬಗ್ಗೆ ಇನ್ನೂ ಹೆಚ್ಚಿನ ಮಾಹಿತಿ ಬೇಕಿದ್ದರೆ ಮಹಾಭಾರತ ತಾತ್ಪರ್ಯ ನಿರ್ಣಯದ "ಸರ್ಗಾನುಸರ್ಗ-ಲಯ-ಪ್ರಾದುರ್ಭಾವ ನಿರ್ಣಯ"ವನ್ನು ಓದಿ].

ಊರ್ಧ್ವಂ ಗಚ್ಛಂತಿ ಸತ್ತ್ವಸ್ಥಾ ಮಧ್ಯೇ ತಿಷ್ಠಂತಿ ರಾಜಸಾಃ ।
ಜಘನ್ಯಗುಣವೃತ್ತಿಸ್ಥಾ ಅಧೋ ಗಚ್ಛಂತಿ ತಾಮಸಾಃ॥೧೮॥

ಊರ್ಧ್ವಮ್ ಗಚ್ಛಂತಿ ಸತ್ತ್ವಸ್ಥಾಃ ಮಧ್ಯೇ ತಿಷ್ಠಂತಿ ರಾಜಸಾಃ ।
ಜಘನ್ಯಗುಣ ವೃತ್ತಿಸ್ಥಾಃ ಅಧಃ ಗಚ್ಛಂತಿ ತಾಮಸಾಃ–ಸತ್ವದಲ್ಲಿ ನೆಲೆಗೊಂಡವರು ಎತ್ತರಕ್ಕೆರುತ್ತಾರೆ. ರಾಜಸರು ನಡುವಿನಲ್ಲಿ ನಿಲ್ಲುತ್ತಾರೆ. 'ಕೊನೆಯ ಗುಣದ' ಪ್ರಭಾವಕ್ಕೊಳಗಾದ ತಾಮಸರು ಕೆಳಕ್ಕೆ ಕುಸಿಯುತ್ತಾರೆ.

ತ್ರಿಗುಣದ ಸ್ವಭಾವವನ್ನು ಹೇಳಿದ ಕೃಷ್ಣ, ಅದರ ಪರಿಣಾಮದ ಮೂರು ಮಜಲನ್ನು ಈ ಶ್ಲೋಕದಲ್ಲಿ ವಿವರಿಸಿದ್ದಾನೆ. ಸತ್ವದಲ್ಲಿರುವವರು ಮಾನಸಿಕವಾಗಿ ಮೇಲಕ್ಕೇರುತ್ತಾರೆ. ರಜೋಗುಣದವನಿಗೆ ಯಾವ ಏಳಿಗೆಯೂ ಇಲ್ಲ. ತಮಸ್ಸಿನಲ್ಲಿರುವವ ಮಾನಸಿಕವಾಗಿ ಅಧಃಪಾತ ಹೊಂದುತ್ತಾನೆ. ಇಲ್ಲಿ 'ಊರ್ಧ್ವ' ಎನ್ನುವ ಪದಕ್ಕೆ ವಿಶೇಷವಾದ ಅರ್ಥವಿದೆ. ಕಠೋಪನಿಷತ್ತಿನಲ್ಲಿ ಹೇಳುವಂತೆ :

ಊರ್ಧ್ವಮೂಲೋ ಅವಾಕ್ಶಾಖಃ ಏಷೋ ಅಶ್ವತ್ಥಃ ಸನಾತನಃ ||೨-೩-೧||

ಊರ್ಧ್ವ ಎಂದರೆ ಎಲ್ಲಕ್ಕಿಂತ ಮೇಲಿರುವ ಭಗವಂತ. ಸತ್ವದಲ್ಲಿರುವವ ಮೇಲಕ್ಕೆ ಹೋಗುವುದು ಅಂದರೆ- ಭಗವಂತನ ಕಡೆ ಮುಖಮಾಡಿ ಚಲಿಸುವುದು. ಆತ ಮುಂದೆ ಹೋದಂತೆ ಭಗವಂತನಿಗೆ ಹತ್ತಿರವಾಗುತ್ತಾ

ಹೋಗುತ್ತಾನೆ. ಆದರೆ ತಮಸ್ಸಿನಲ್ಲಿರುವವ ಭಗವಂತನಿಗೆ ಬೆನ್ನು ಹಾಕಿ ಚಲಿಸುತ್ತಿರುತ್ತಾನೆ. ರಾಜಸ ಇದ್ದಲ್ಲೇ ಅತಂತ್ರ ಸ್ಥಿತಿಯಲ್ಲಿ ಮುಂದುವರಿಯುತ್ತಾನೆ.

ದೇವತೆಗಳನ್ನು ಬಂಧನದಲ್ಲಿಡುವ ಶಕ್ತಿ 'ಶ್ರೀದೇವಿ'; ಮಾನವರನ್ನು ಬಂಧನದಲ್ಲಿಡುವ ಶಕ್ತಿ 'ಭೂದೇವಿ' ಮತ್ತು ರಾಕ್ಷಸರನ್ನು ಬಂಧನದಲ್ಲಿಡುವ ಶಕ್ತಿ 'ದುರ್ಗಾದೇವಿ'. ಸಾತ್ವಿಕರು ಸತ್ವಮಾನಿನಿಯಾದ 'ಶ್ರೀದೇವಿಯ' ಕೃಪೆಗೆ ಪಾತ್ರರಾಗಿ ಮೇಲಿನ ಲೋಕವನ್ನು ಪಡೆಯುತ್ತಾರೆ[ಭೂಮಿಯಿಂದ ಮೇಲೆ ಇರುವ ಆರು ಸೂಕ್ಷ್ಮ ಲೋಕಗಳು ಮತ್ತು ಕೊನೆಗೆ ಮೋಕ್ಷ]; ರಾಜಸರು ಭೂದೇವಿಯ ಬಂಧನದಲ್ಲೇ ಮುಂದುವರಿಯುತ್ತಾರೆ[ಭೂಮಿ ಮತ್ತು ಅಂತರಿಕ್ಷ] ಮತ್ತು ತಾಮಸರು ದುರ್ಗಾದೇವಿಯ ನಿಯಂತ್ರಣದಲ್ಲಿರುವ ತಾಮಸಲೋಕ [ಭೂಮಿಯಿಂದ ಕೆಳಗಿರುವ ಏಳು ಸೂಕ್ಷ್ಮಲೋಕಗಳು]ವನ್ನು ಸೇರುತ್ತಾರೆ.

ನಾ[ऽ]ನ್ಯಂ ಗುಣೇಭ್ಯಃ ಕರ್ತಾರಂ ಯದಾ ದ್ರಷ್ಟಾऽನುಪಶ್ಯತಿ ।
ಗುಣೇಭ್ಯಶ್ಚ ಪರಂ ವೇತ್ತಿ ಮದ್ಭಾವಂ ಸೋऽಧಿಗಚ್ಛತಿ ॥೧೯॥

ನ ಅನ್ಯಮ್ ಗುಣೇಭ್ಯಃ ಕರ್ತಾರಮ್ ಯದಾ ದ್ರಷ್ಟಾ ಅನುಪಶ್ಯತಿ।
ಗುಣೇಭ್ಯಃ ಚ ಪರಮ್ ವೇತ್ತಿ ಮತ್ ಭಾವಮ್ ಸಃ ಅಧಿಗಚ್ಛತಿ – ಈ ಎಲ್ಲಾ ಪರಿಣಾಮಗಳಿಗೆ ತ್ರಿಗುಣಗಳಲ್ಲದೆ ಬೇರೆ ಕಾರಣವಿಲ್ಲ ಎಂದು ಕಂಡುಕೊಂಡವನು[ತ್ರಿಗುಣಗಳಿಂದ ಭಿನ್ನನಾದ ಭಗವಂತನೇ ಎಲ್ಲದರ ಮೂಲ ಕಾರಣ ಎಂದು ತಿಳಿದವನು] ಮತ್ತು ಗುಣಗಳಿಂದ ಅತೀತನೆಂದು ಭಗವಂತನನ್ನು ತಿಳಿದವನು[ನಿಜವಾದ ಮನುಷ್ಯ-ಅವನು] ನನ್ನಲ್ಲೇ ನೆಲೆಸುತ್ತಾನೆ.

ನಮ್ಮ ಜೀವನದಲ್ಲಿ ಏನೇನು ನಡೆಯುತ್ತದೆಯೋ ಅದೆಲ್ಲವೂ ಈ ಮೂರು ಗುಣಗಳ ಪ್ರಕ್ರಿಯೆ. ನಾವು ನಾವಾಗಿ ಏನೂ ಮಾಡುವುದಿಲ್ಲ. ಬದಲಿಗೆ ಎಲ್ಲವೂ ತ್ರಿಗುಣಗಳ ಪ್ರಭಾವದಿಂದ ನಡೆಯುತ್ತಿರುತ್ತದೆ. ಪ್ರಕೃತಿಯಿಂದ ಬಂದು, ನಮ್ಮ ಸ್ವರೂಪವನ್ನು ಮುಚ್ಚಿ ಅವು ಕೆಲಸ ಮಾಡುತ್ತಿರುತ್ತವೆ. ಹಾಗಾಗಿ ಒಬ್ಬ ವ್ಯಕ್ತಿಯ ಮೇಲ್ನೋಟದ ವರ್ತನೆಯಿಂದ ಆತನ ನಿಜ ಸ್ವಭಾವವನ್ನು ಅರಿಯುವುದು ಸಾಧ್ಯವಾಗುವುದಿಲ್ಲ. ಈ ಕಾರಣದಿಂದ ನಾವು ಪ್ರಪಂಚದಲ್ಲಿ ನಡೆಯುವ ಘಟನೆಗಳನ್ನು ನಿರ್ವಿಕಾರರಾಗಿ ಕಾಣಲು ಅಭ್ಯಾಸ ಮಾಡಿಕೊಳ್ಳಬೇಕು.

ಸತ್ವಕ್ಕೆ ಶ್ರುತಿಗೂಡಿದ ಮನಸ್ಸು ಸತ್ವಕ್ಕೆ ಅನುಗುಣವಾದ ವಿಷಯವನ್ನೇ ಗ್ರಹಿಸುತ್ತದೆ. ಅಂತಹ ವ್ಯಕ್ತಿ ಎಂದೂ 'ನಾನು ಮಾಡಿದೆ' ಎಂದು ಭ್ರಮೆ ಪಡುವುದಿಲ್ಲ. ಇಲ್ಲಿ ಗುಣಗಳಿಗಿಂತ ಬೇರೆಯಾದ ಕರ್ತಾ ಇಲ್ಲ ಎಂದಿದ್ದಾರೆ. ಜಡಕ್ಕೆ ಎಂದೂ ಕರ್ತಾ ಎನ್ನುವುದಿಲ್ಲ. ಆದ್ದರಿಂದ ಗುಣ ಅಂದರೆ ಕೇವಲ ಜಡವಾದ ಗುಣವಲ್ಲ. ಅದಕ್ಕೆ ಅಭಿಮಾನಿಯಾದ ಚೈತನ್ಯವನ್ನು ಗುರುತಿಸು ಎನ್ನುವ ಸಂದೇಶ ಈ ಶ್ಲೋಕದಲ್ಲಿದೆ.[ಶ್ಲೋಕ ೧೭ರಲ್ಲಿ ನಾವು ಈ ಬಗ್ಗೆ ಚರ್ಚಿಸಿದ್ದೇವೆ]. ಕರ್ತೃತ್ವದಲ್ಲಿ ಅನೇಕ ವಿಧ. ಇಚ್ಛಾಪೂರ್ವಕ ಕೃತಿ ಎಲ್ಲಿದೆಯೋ ಅದು ಕರ್ತಾ. ಇದು ಇರುವುದು ಚೇತನಕ್ಕೆ ಮಾತ್ರ. ಆದರೆ ನಿಜವಾದ ಕರ್ತೃತ್ವ 'ಸ್ವತಂತ್ರ ಇಚ್ಛಾಪೂರ್ವಕ ಕೃತಿ'. ಇದು ಇರುವುದು ಕೇವಲ ಭಗವಂತನಲ್ಲಿ. 'ನಾಹಂ ಕರ್ತಾ ಹರಿಃ ಕರ್ತಾ' ಎನ್ನುವ ಪ್ರಸಿದ್ಧವಾದ ಮಾತು ನಮಗೆ ತಿಳಿದೇ ಇದೆ. ಇದನ್ನು ಮೋಕ್ಷಧರ್ಮಪರ್ವದಲ್ಲಿ ಈ ರೀತಿ ಹೇಳಿದ್ದಾರೆ:

ನಾಹಂ ಕರ್ತಾ ನ ಕರ್ತಾ ತ್ವಂ ಕರ್ತಾಯಸ್ತು ಸದಾ ಪ್ರಭುಃ ||
ಸೋಽಯಂ ಪಚತಿ ಕಾಲೋ ಮಾಮ್ ವೃಕ್ಷೇ ಫಲಂ ಇವಾಗತಂ || ೧೨-೨೨೦-೮೪ ||

"ನೀನೂ ಮಾಡಿಲ್ಲ, ನಾನೂ ಮಾಡಿಲ್ಲ- 'ಅವನು' ನಮ್ಮಿಂದ ಮಾಡಿಸಿದ". ಈ ಎಚ್ಚರ ಇದ್ದಾಗ ನಮಗೆ ಕರ್ತೃತ್ವದ ಅಹಂಕಾರ ಬರಲು ಸಾಧ್ಯವಿಲ್ಲ. ಇದರಿಂದ ದ್ವೇಷವಿಲ್ಲ, ಮಮಕಾರವಿಲ್ಲ. 'ನಾನು ಮಾಡಿದೆ , ನನ್ನಿಂದಾಯ್ತು' ಎನ್ನುವುದು ಕೇವಲ ಭ್ರಮೆ. ಈ ಜಗತ್ತಿನಲ್ಲಿ ಏನೇ ನಡೆದರೂ ಅದು ಈ ಮೂರು ಗುಣಗಳ ಪ್ರಭಾವದಿಂದ ನಡೆದಿದೆ. ಅದನ್ನು ಮೀರಿ ನನ್ನಷ್ಟಕ್ಕೆ ನಾನು ಏನೂ ಮಾಡಿಲ್ಲ. ಈ ಅರಿವು ನಮಗೆ ಬರಬೇಕು.

ತ್ರಿಗುಣಗಳ ಪ್ರಭಾವ ಜಡದಲ್ಲೂ ಇದೆ, ಚೇತನದಲ್ಲೂ ಇದೆ. ಅದರ ಪ್ರಭಾವದಿಂದ ಕ್ರಿಯೆ ನಡೆಯುತ್ತದೆ. ಯಾರೋ ಒಬ್ಬರು ನಿಮಗೆ ಬೈದರು ಎಂದರೆ-ಆತನಲ್ಲಿ ಆ ಕ್ಷಣದಲ್ಲಿ ರಜೋಗುಣ ಜಾಗೃತವಾಗಿ ಕೆಲಸ ಮಾಡುತ್ತಿದೆ ಎಂದರ್ಥ. ನಾವು ಈ ಅರಿವಿನಿಂದ ಆ ಕ್ಷಣದಲ್ಲಿ ವರ್ತಿಸಬೇಕು. ಇದನ್ನು ಶ್ರೀರಾಮಚಂದ್ರ ತನ್ನ ಜೀವನದಲ್ಲಿ ನಡೆದು ತೋರಿಸಿದ್ದಾನೆ. ರಾಮಾಯಣದಲ್ಲಿ ವಾಲ್ಮೀಕಿ ಹೇಳುತ್ತಾರೆ:

ಸ ಹಿ ನಿತ್ಯಂ ಪ್ರಶಾಂತಂ ಮೃದುಪೂರ್ವಃ ಚ ಭಾಷತೆ |
ಉಚ್ಚಮಾನೋಽಪಿ ಪರುಷಮ್ ನೋತ್ತರಂ ಪ್ರತಿಪದ್ಯತೆ ||ಅಯೋಧ್ಯಾ-೧.೧೫||

ರಾಮನಲ್ಲಿ ಯಾರಾದರೂ ಜಗಳಕ್ಕೆ ನಿಂತರೆ ಆತ ಎಂದೂ ಸಿಟ್ಟಿಗೇಳುತ್ತಿರಲಿಲ್ಲ. "ಮತ್ತೆ ಮಾತನಾಡೋಣ" ಎಂದು ಹೊರಟು ಹೋಗುತ್ತಿದ್ದನಂತೆ. ಏಕೆಂದರೆ ಒಬ್ಬ ವ್ಯಕ್ತಿಯಲ್ಲಿ ರಜೋಗುಣ ಕೆಲಸ ಮಾಡುತ್ತಿರುವಾಗ, ಅವರೊಂದಿಗೆ ನಾವು ರಜೋಗುಣದಿಂದ ವರ್ತಿಸಬೇಕಾದ ಪ್ರಸಂಗ ಬಂದುಬಿಡುತ್ತದೆ. ಇದು ಬಹಳ ಅಪಾಯಕಾರಿ. ಆದ್ದರಿಂದ ರಜೋಗುಣಕ್ಕೊಳಗಾದವರೊಂದಿಗೆ ನೀನು ರಾಜಸನಾಗಬೇಡ. ತಟಸ್ಥನಾಗಿ ದೂರ ನಿಲ್ಲು(Act but never React). ಆಗ ಅವರ ರಜೋಗುಣ ತನ್ನಷ್ಟಕ್ಕೆ ಕುಸಿಯುತ್ತದೆ. ಸಿಟ್ಟು ಮಾಡುವವರ ಮುಂದೆ ಮೌನಿಯಾದರೆ ಅವರ ಸಿಟ್ಟು ಬಹುಬೇಗ ಕರಗುತ್ತದೆ. ಹೀಗೆ ನಾವು ಈ ಗುಣಗಳ ಪ್ರಭಾವವನ್ನು ಗುರುತಿಸಿದಾಗ ನಮ್ಮ ಬದುಕಿನ ನಡೆಯೂ ಬೇರೆಯಾಗುತ್ತದೆ.

ಮೇಲೆ ಹೇಳಿರುವ ವಿಷಯವನ್ನಷ್ಟೇ ತಿಳಿದರೆ ಸಾಲದು. ಈ ತ್ರಿಗುಣಗಳನ್ನು ಮೀರಿ ನಿಂತವ ಭಗವಂತ. ಅವನನ್ನು ತಿಳಿದಾಗ ನೀನು ತ್ರಿಗುಣಗಳನ್ನು ಮೀರಿ ನಿಲ್ಲಲು ಸಹಾಯವಾಗುತ್ತದೆ. ಆ ಭಗವಂತನನ್ನು ಸೇರಲು ನಾನು ಈ ತ್ರಿಗುಣಗಳ ಪ್ರಭಾವದಿಂದ ಹೊರ ಬರಬೇಕು ಎನ್ನುವ ಸತ್ಯವನ್ನು ನಾವು ಅರ್ಥ ಮಾಡಿಕೊಳ್ಳಬೇಕು. "ಇಂಥವರ ಮನಸ್ಸು ನನ್ನಲ್ಲಿ ನೆಲೆಗೊಳ್ಳುತ್ತದೆ ಮತ್ತು ಅದರಿಂದಾಗಿ ಮುಂದೆ ಅವರು ನನ್ನನ್ನು ಬಂದು ಸೇರಿ ನನ್ನಲ್ಲೇ ನೆಲೆಸುತ್ತಾರೆ" ಎನ್ನುತ್ತಾನೆ ಕೃಷ್ಣ.

ಈ ಶ್ಲೋಕಕ್ಕೆ ಇನ್ನೊಂದು ಮುಖವಿದೆ. "ಗುಣೇಭ್ಯಃ ಅನ್ಯಂ ಕರ್ತಾರಂ ಯದಾ ದ್ರಷ್ಟಾ ಅನುಪಶ್ಯತಿ ತದಾ ಸಃ 'ನಾ' ಭವತಿ". ಇಲ್ಲಿ "ಗುಣೇಭ್ಯಃ ಅನ್ಯಂ" ಅಂದರೆ ತ್ರಿಗುಣಮಾನಿನಿಯಾಗಿರತಕ್ಕಂತಹ, ಗುಣಶಬ್ದವಾಚ್ಯಳಾದ, ಶ್ರೀ-ಭೂ-ದುರ್ಗ ನಾಮಕಳಾದ, ಮಹಾಲಕ್ಷ್ಮಿಗಿಂತಲೂ ಅತೀತವಾದ ಒಂದು ಶಕ್ತಿ. ಅವನೇ ನಿಜವಾದ ಕರ್ತಾ. ಯಾರಾತ? ಮುಂಡಕೋಪನಿಷತ್ತಿನಲ್ಲಿ ಹೇಳುವಂತೆ:

ಯದಾ ಪಶ್ಯಃ ಪಶ್ಯತೇ ರುಕ್ಮವರ್ಣಂ ಕರ್ತಾರಮೀಶಂ ಪುರುಷಂ ಬ್ರಹ್ಮಯೋನಿಂ || ೩-೧-೩||

ಯಾರು ಚತುರ್ಮುಖನಿಗೂ ತಂದೆಯೋ, ಯಾರು ಚಿತ್ಪ್ರಕೃತಿಗೂ ನಿಯಾಮಕನೋ, ಯಾರು ಸಮಸ್ತ ವೇದಗಳಿಂದ ವಾಚ್ಯನೋ –ಅವನೊಬ್ಬನೇ ಕರ್ತಾ. ಇದನ್ನು ತಿಳಿದವನು ನಿಜವಾದ ಮಾನವ.

ಎಲ್ಲಾ ಅಧ್ಯಾತ್ಮ ಸಾಧನೆ ಮಾಡುವ ಸೌಕರ್ಯವಿರುವ ಶರೀರ-ಮನುಷ್ಯ ಶರೀರ ಮಾತ್ರ. ಅಂತಹ ಶರೀರವನ್ನು ಉಪಯೋಗಿಸಿಕೊಳ್ಳುವವ ನರ. ಧರ್ಮ-ಅರ್ಥ-ಕಾಮಗಳಿಂದ ಬಿಡಿಸಿಕೊಳ್ಳುವುದು ಎಂದರೆ ಸತ್ವ-ರಜಸ್ಸು-ತಮೋಗುಣಗಳಿಂದ ಬಿಡಿಸಿಕೊಂಡು ಭಗವಂತನನ್ನು ಸೇರುವುದು. ಇದು ಮನುಷ್ಯನ ಜೀವನದ ಗುರಿ. "ಈ ಮೂರು ಗುಣಗಳು ನನ್ನಲ್ಲಿ ಕೆಲಸ ನಡೆಸಿವೆ, ನಾನು ಈ ಪ್ರಭಾವದಿಂದ ಕಳಚಿಕೊಂಡು ಮೇಲೇರಬೇಕು" ಎನ್ನುವ ಎಚ್ಚರವಿರುವುದು ಮನುಷ್ಯನಿಗೆ ಮಾತ್ರ. ಈ ಎಚ್ಚರದಿಂದಾಗಿ "ಮದ್ಭಾವಂ ಸೋಽಧಿಗಚ್ಛತಿ"-ಅವನಲ್ಲಿ ಭಕ್ತಿಜ್ಞಾನಗಳು ಮನಸ್ಸಿನಲ್ಲಿ ತುಂಬಿ ಆತ ಮೋಕ್ಷವನ್ನು ಸೇರುತ್ತಾನೆ.

ಗುಣಾನೇತಾನತೀತ್ಯ ತ್ರೀನ್ ದೇಹೀ ದೇಹಸಮುದ್ಭವಾನ್ ।
ಜನ್ಮಮೃತ್ಯುಜರಾದುಃಖೈರ್ವಿಮುಕ್ತೋಽಮೃತಮಶ್ನುತೇ ॥೨೦॥

ಗುಣಾನ್ ಏತಾನ್ ಅತೀತ್ಯ ತ್ರೀನ್ ದೇಹೀ ದೇಹ ಸಮುದ್ಭವಾನ್ ।
ಜನ್ಮ ಮೃತ್ಯು ಜರಾ ದುಃಖೈಃ ವಿಮುಕ್ತಃ ಅಮೃತಮ್ ಅಶ್ನುತೇ–ದೇಹದಲ್ಲಿ ಮೂಡಿಬರುವ ಈ ಮೂರು ಗುಣಗಳನ್ನು ದಾಟಿದಾಗ ಜೀವ ಹುಟ್ಟು ಸಾವು ಮುಪ್ಪಿನ ದುಃಖದಿಂದಲೂ ಪಾರಾಗಿ ಅಮರನಾಗುತ್ತಾನೆ.

ನಮ್ಮ ಸ್ವರೂಪವನ್ನು ಮುಚ್ಚಿ ಗಾಢವಾಗಿ ಪರಿಣಾಮಬೀರುವ ಈ ಮೂರು ಗುಣಗಳನ್ನು ನಾವು ದಾಟಬೇಕು. [ಇಲ್ಲಿ ಮೂರು ಗುಣದಲ್ಲಿ ಸತ್ವವನ್ನು ದಾಟುವುದು ಎಂದರೆ ಸ್ಥೂಲ ಸತ್ವವನ್ನು ದಾಟಿ, ಸೂಕ್ಷ್ಮ ಸತ್ವವನ್ನು ಸೇರುವುದು ಎಂದರ್ಥ]. ಹೀಗೆ ಮೂರು ಗುಣಗಳನ್ನು ದಾಟಿ ತ್ರಿಗುಣಾತೀತನಾದರೆ, ಆಗ ನಾವು ಈ ಸಂಸಾರದ ಹುಟ್ಟು-ಸಾವು-ರೋಗ-ಮುಪ್ಪು-ದುಃಖ ಎಲ್ಲವನ್ನು ದಾಟಿ ಭಗವಂತನನ್ನು ಸೇರಿ ಅಮರರಾಗಬಹುದು. ಇದರಿಂದ ಎಂದೂ ಹುಟ್ಟು ಸಾವಿಲ್ಲದ ಆನಂದದ ಸ್ಥಿತಿಯಾದ ಮೋಕ್ಷವನ್ನು ಪಡೆಯಲು ಸಾಧ್ಯ.
ಇಲ್ಲಿ ಕೃಷ್ಣ ತ್ರಿಗುಣವನ್ನು ದಾಟಿದಾಗ ಅದರಿಂದ ಮೋಕ್ಷ ಪ್ರಾಪ್ತಿಯಾಗುತ್ತದೆ ಎಂದು ಹೇಳಿದ. ಹೀಗೆ ಹೇಳಿದಾಗ ಸಹಜವಾಗಿ ನಮಗೊಂದು ಪ್ರಶ್ನೆ ಬರುತ್ತದೆ. ಅದೇ ಪ್ರಶ್ನೆಯನ್ನು ಮುಂದಿನ ಶ್ಲೋಕದಲ್ಲಿ ಅರ್ಜುನ ಕೃಷ್ಣನ ಮುಂದಿಡುತ್ತಾನೆ.

ಅರ್ಜುನ ಉವಾಚ ।
ಕೈರ್ಲಿಂಗೈಸ್ತ್ರೀನ್ ಗುಣಾನೇತಾನತೀತೋ ಭವತಿ ಪ್ರಭೋ ।
ಕಿಮಾಚಾರಃ ಕಥಂ ಚೈತಾಂಸ್ತ್ರೀನ್ ಗುಣಾನತಿವರ್ತತೇ ॥೨೧॥

ಅರ್ಜುನಃ ಉವಾಚ-ಅರ್ಜುನ ಕೇಳಿದನು:
ಕೈಃ ಲಿಂಗೈಃ ತ್ರೀನ್ ಗುಣಾನ್ ಏತಾನ್ ಅತೀತಃ ಭವತಿ ಪ್ರಭೋ ।
ಕಿಮ್ ಆಚಾರಃ ಕಥಮ್ ಚ ಏತಾನ್ ತ್ರೀನ್ ಗುಣಾನ್ ಅತಿವರ್ತತೇ–ಒಡೆಯನೇ, ಯಾವ ಕುರುಹುಗಳಿಂದ ಈ ಮೂರು ಗುಣಗಳನ್ನು ದಾಟಿದವನೆನ್ನಿಸುತ್ತಾನೆ ? ಅವನ ನಡೆವಳಿಕೆ ಎಂತಹದು ? ಹೇಗೆ ಈ ಮೂರು ಗುಣಗಳನ್ನು ದಾಟುತ್ತಾನೆ?

ನಮ್ಮ ನಿಮ್ಮೆಲ್ಲರ ಪರವಾಗಿ ಅರ್ಜುನ ಕೃಷ್ಣನಲ್ಲಿ ಪ್ರಶ್ನೆ ಹಾಕುತ್ತಾನೆ. ಆತ ಕೇಳುತ್ತಾನೆ: "ಮೂರು ಗುಣಗಳನ್ನು ದಾಟಿದವನೊಬ್ಬನಿದ್ದರೆ ಅವನನ್ನು ಗುರುತಿಸುವುದು ಹೇಗೆ? ಆತನ ಕುರುಹು ಏನು? ಅವನ ನಡತೆ ಹೇಗಿರುತ್ತದೆ? ಈ ಮೂರು ಗುಣಗಳನ್ನು ಆತ ಹೇಗೆ ದಾಟುತ್ತಾನೆ?"

ಇಲ್ಲಿ ಅರ್ಜುನ ಕೃಷ್ಣನನ್ನು "ಪ್ರಭೋ" ಎಂದು ಸಂಬೋಧಿಸಿದ್ದಾನೆ. "ನನ್ನ ಪ್ರಶ್ನೆಗಳಿಗೆ ಖಂಡಿತವಾಗಿ ಉತ್ತರ ಕೊಡಬಲ್ಲವ-ನೀನೊಬ್ಬನೆ" ಎನ್ನುವ ಧ್ವನಿ ಮತ್ತು 'ಪೂರ್ಣ ಶರಣಾಗತಿ' ಈ ಸಂಬೋಧನೆಯ ಹಿಂದಿದೆ. ಭಗವಂತ ಅರ್ಜುನನ ಈ ಪ್ರಶ್ನೆಗೆ ಮುಂದಿನ ಶ್ಲೋಕಗಳಲ್ಲಿ ವಿವರವಾಗಿ ಉತ್ತರಿಸಿದ್ದಾನೆ.

ಭಗವಾನುವಾಚ ।
ಪ್ರಕಾಶಂ ಚ ಪ್ರವೃತ್ತಿಂ ಚ ಮೋಹಮೇವ ಚ ಪಾಂಡವ ।
ನ ದ್ವೇಷ್ಟಿ ಸಂಪ್ರವೃತ್ತಾನಿ ನ ನಿವೃತ್ತಾನಿ ಕಾಂಕ್ಷತಿ ॥೨೨॥

ಭಗವಾನ್ ಉವಾಚ-ಭಗವಂತ ಹೇಳಿದನು:
ಪ್ರಕಾಶಮ್ ಚ ಪ್ರವೃತ್ತಿಮ್ ಚ ಮೋಹಮ್ ಏವ ಚ ಪಾಂಡವ ।
ನ ದ್ವೇಷ್ಟಿ ಸಂಪ್ರವೃತ್ತಾನಿ ನ ನಿವೃತ್ತಾನಿ ಕಾಂಕ್ಷತಿ–ಪಾಂಡವ, ಲೌಕಿಕದ ತಿಳಿವಿನ ಬೆಳಕನ್ನಾಗಲೀ, ಕಾಯಕದ ಹುರುಪನ್ನಾಗಲೀ, ಭ್ರಾಂತಿಯನ್ನೇ ಆಗಲಿ- ಇದ್ದಾಗ ದ್ವೇಷಿಸುವುದಿಲ್ಲ; ಇರದಾಗ ಬಯಸುವುದಿಲ್ಲ.

ತ್ರಿಗುಣಗಳನ್ನು ದಾಟಿದವ ಯಾವುದೋ ಅನಪೇಕ್ಷವಾದುದು ಬಂದಾಗ ಅದನ್ನು ದ್ವೇಷಿಸುವುದಿಲ್ಲ; ಅಪೇಕ್ಷಿತವಾದುದು ಬಾರದೇ ಇದ್ದಾಗ ಅದನ್ನು ಅಪೇಕ್ಷಿಸುವುದಿಲ್ಲ. "ಯಾವುದು ಬೇಕು, ಯಾವುದು ಬೇಡ ಎನ್ನುವುದು ನನಗಿಂತ ಚೆನ್ನಾಗಿ ಭಗವಂತನಿಗೆ ಗೊತ್ತಿದೆ. ಅದಕ್ಕಾಗಿ ನಾನೇಕೆ ತಲೆ ಕೆಡಿಸಿಕೊಳ್ಳಬೇಕು" ಎನ್ನುವ ನಿರ್ಲಿಪ್ತತೆ ಆತನಲ್ಲಿರುತ್ತದೆ. ಜೀವನದಲ್ಲಿ ಏನು ಬಂತೋ ಅದನ್ನು ಆತ ಸ್ವಾಗತಿಸುತ್ತಾನೆ. ವ್ಯಾಸರು ಮಹಾಭಾರತದ ಶಾಂತಿಪರ್ವದಲ್ಲಿ ಒಂದು ಮಾತನ್ನು ಹೇಳಿದ್ದಾರೆ:

ಏವಂ ಅಪ್ಯ ಅಶುಭಂ ಕರ್ಮ ನ ಭೂತಂ ನ ಭವಿಷ್ಯತಿ ||೧೨-೩೨-೧೮||

"ಆಗಬಾರದ್ದು ಹಿಂದೆ ಆಗಿಲ್ಲ, ಮುಂದೆ ಆಗುವುದೂ ಇಲ್ಲ. ಏನು ಆಗಬೇಕೋ ಅದು ಘಟಿಸಿಯೇ ತೀರುತ್ತದೆ. ಅದನ್ನು ನಾನು ಬೇಡ ಎಂದು ದ್ವೇಷಿಸಿ ಫಲವೇನು?". ಆದ್ದರಿಂದ ತ್ರಿಗುಣವನ್ನು ದಾಟಿದವನು- ಬಂದಾಗ 'ಬೇಡ' ಎಂದು ದ್ವೇಷಿಸುವುದಿಲ್ಲ; ಇಲ್ಲದ್ದನ್ನು ಬಯಸುವುದೂ ಇಲ್ಲ. ಎಲ್ಲವನ್ನೂ ನಿರ್ವಿಕಾರನಾಗಿ ನೋಡುತ್ತಾ, ತುಂಬಿದ ಕೊಡದಂತೆ ತುಳುಕದೇ ಬದುಕುತ್ತಾನೆ.

ಲೋಕದಲ್ಲಿ ಕೆಲವರಿಗೆ ಸತ್ವದಲ್ಲಿ ಆಸಕ್ತಿಯಾದರೆ ಇನ್ನು ಕೆಲವರಿಗೆ ಕೇವಲ ಪ್ರವೃತ್ತಿ. ಮತ್ತೆ ಕೆಲವರಿಗೆ ಯಾವ ಆಸಕ್ತಿಯೂ ಇಲ್ಲ- ಕತ್ತಲನ್ನು ಕತ್ತಲು ಎಂದು ತಿಳಿಯದೆ ಕತ್ತಲಲ್ಲೇ ಬದುಕುವವರಿದ್ದಾರೆ. ಇದು ಸರ್ವೇಸಾಮಾನ್ಯವಾಗಿ ಕಾಣುವ ವಿಚಾರ. ತ್ರಿಗುಣವನ್ನು ಮೀರಿ ನಿಂತವರು ಇದನ್ನು ನೋಡಿ ತಮ್ಮ ಮನಸ್ಸನ್ನು ವಿಕಾರ ಮಾಡಿಕೊಳ್ಳುವುದಿಲ್ಲ. "ಅವರವರ ಗುಣ ಪ್ರಭಾವಕ್ಕನುಗುಣವಾಗಿ ಎಲ್ಲವೂ ನಡೆಯುತ್ತಿದೆ" ಎಂದು

ತಿಳಿದು ತಟಸ್ಥರಾಗಿ ಬದುಕುತ್ತಾರೆ. ಸತ್ಯವೆಂದು ಕಂಡದ್ದನ್ನು ಇವರು ಹೇಳುತ್ತಾರೆ. ಆದರೆ ಎಂದೂ ವಾದ ವಿವಾದವನ್ನು ಬೆಳೆಸುವುದಿಲ್ಲ. "ಎಲ್ಲವೂ ಭಗವಂತನ ಲೀಲೆ, ಆತ ಮಾಡಿದ ವ್ಯವಸ್ಥೆ" ಎಂದು ಎಲ್ಲವನ್ನು ಸ್ವೀಕರಿಸುತ್ತಾರೆ. ಗೀತೆಯ ಹನ್ನೆರಡನೇ ಅಧ್ಯಾಯದಲ್ಲಿ 'ನಿಜವಾದ ಭಕ್ತ' ಹೇಗಿರುತ್ತಾನೆ ಎಂದು ವಿವರಿಸುವಾಗ ಕೃಷ್ಣ ಈ ಶ್ಲೋಕದಲ್ಲಿ ಕೊಟ್ಟ ವಿವರಣೆಯನ್ನೇ ಕೊಟ್ಟಿದ್ದಾನೆ. ಇದರ ಅರ್ಥ- ಹೊರಗಿನ ಗುಣವನ್ನು ಮೀರಿ ನಿಲ್ಲುವುದೇ ನಿಜವಾದ ಭಕ್ತಿ.

ಇಲ್ಲಿ ವ್ಯಾಸರು 'ಪಾಂಡವ' ಎನ್ನುವ ವಿಶೇಷಣವನ್ನು ಬಳಸಿದ್ದಾರೆ. ಪಾಂಡಾ ಎಂದರೆ ಜ್ಞಾನಿ. ಪಾಂಡವ ಎಂದರೆ ಜ್ಞಾನವನ್ನು ಗುರುತಿಸಿ ತಲೆಬಾಗುವವನು. "ತ್ರಿಗುಣಾತೀತನಾಗುವ ಮೊದಲು ನೀನು ಪಾಂಡವನಾಗಬೇಕು" ಎನ್ನುವ ಸಂದೇಶ ಈ ವಿಶೇಷಣದ ಹಿಂದಿದೆ.

ಉದಾಸೀನವದಾಸೀನೋ ಗುಣೈರ್ಯೋ ನ ವಿಚಾಲ್ಯತೇ ।
ಗುಣಾ ವರ್ತಂತ ಇತ್ಯೇವ ಯೋSವತಿಷ್ಠತಿ ನೇಂಗತೇ ॥೨೩॥

ಉದಾಸೀನವತ್ ಆಸೀನಃ ಗುಣೈಃ ಯಃ ನ ವಿಚಾಲ್ಯತೇ ।

ಗುಣಾಃ ವರ್ತಂತ ಇತಿ ಏವಮ್ ಯಃ ಅವತಿಷ್ಠತಿ ನ ಇಂಗತೇ –ಉದಾಸೀನನಂತೆ ಇದ್ದುಬಿಡುತ್ತಾನೆ. ಗುಣಗಳ ಸೆಳೆತಕ್ಕೆ ಕದಲುವುದಿಲ್ಲ. ಗುಣಗಳು ಇರುವಂತವೇ ಎಂದು ತೆಪ್ಪಗೆ ಇದ್ದು ಬಿಡುತ್ತಾನೆ. ಅವುಗಳ ತಾಳಕ್ಕೆ ತಾನು ಕುಣಿಯುವುದಿಲ್ಲ.

ಪ್ರಾಪಂಚಿಕ ವ್ಯವಹಾರದಲ್ಲಿ ಈತ ಉದಾಸೀನನಂತೆ ಇದ್ದುಬಿಡುತ್ತಾನೆ. ನಮಗೆ ಬೇಕು ಬೇಡಗಳು ಬರುವುದು ತ್ರಿಗುಣಗಳಿಂದ. ತ್ರಿಗುಣಾತೀತ- "ಹಾಗಾಗಬೇಕು-ಹೀಗೇ ಆಗಬೇಕು" ಎಂದು ಬಯಸುವುದಿಲ್ಲ. "ಹೇಗಾಗಬೇಕೋ ಹಾಗೇ ಭಗವಂತ ಮಾಡುತ್ತಾನೆ" ಎನ್ನುವ ನಂಬಿಕೆ ಅವನಲ್ಲಿರುತ್ತದೆ.[ಇಲ್ಲಿ ಒಂದು ವಿಷಯವನ್ನು ನಾವು ತಿಳಿದುಕೊಳ್ಳಬೇಕು. ಪ್ರಪಂಚದಲ್ಲಿ ನಡೆಯುವ ಘಟನೆಗಳು ನಮ್ಮ ಅಧೀನವಲ್ಲ. ನಾವು ಆಗಬಾರದು ಅಂದುಕೊಳ್ಳುವುದು ಆಗಬಹುದು, ಆಗಬೇಕು ಅಂದುಕೊಳ್ಳುವುದು ಆಗದೇ ಇರಬಹುದು. ಹೀಗಿರುವಾಗ 'ಹೀಗೇ ಆಗಬೇಕು' ಎಂದು ವ್ಯರ್ಥವಾಗಿ ಮನಸ್ಸನ್ನು ಉದ್ವೇಗಕ್ಕೊಳಪಡಿಸುವುದರಲ್ಲಿ ಅರ್ಥವಿಲ್ಲ]. ಹೀಗೆ ಬದುಕಿದಾಗ-ಬಯಸಿದ್ದು ಆಗದಿದ್ದಾಗ ಕೋಪವಿಲ್ಲ, ಆದಾಗ ಹಾರಾಟವಿಲ್ಲ. ಮನಸ್ಸು ಪ್ರಸನ್ನವಾಗಿರುತ್ತದೆ. ಇಂದ್ರಿಯಗಳು ಗುಣಗಳಲ್ಲಿ ಇರುತ್ತವೆ, ಇಂದ್ರಿಯಗಳ ಹಿಂದೆ ಗುಣಗಳಿರುತ್ತವೆ. ಆದರೆ ತ್ರಿಗುಣಾತೀತ ಇವೆಲ್ಲವನ್ನೂ ತಿಳಿದು, ತಲೆಕೆಡಿಸಿಕೊಳ್ಳದೇ, ಯಾವುದೇ ಕ್ರಿಯೆಯಲ್ಲಿ ಕೂಡಾ[ತಾತ್ಕಾಲಿಕ ಕ್ರಿಯೆಯಲ್ಲಿ ಕೂಡಾ] ಚಪಲವಿಲ್ಲದೆ ಬದುಕುತ್ತಾನೆ.

ಸಮದುಃಖಸುಖಃ ಸ್ವಸ್ಥಃ ಸಮಲೋಷ್ಟಾಶ್ಮಕಾಂಚನಃ ।
ತುಲ್ಯಪ್ರಿಯಾಪ್ರಿಯೋ ಧೀರಸ್ತುಲ್ಯನಿಂದಾತ್ಮಸಂಸ್ತುತಿಃ ॥೨೪॥

ಸಮ ದುಃಖಸುಖಃ ಸ್ವಸ್ಥಃ ಸಮ ಲೋಷ್ಟ ಆಶ್ಮ ಕಾಂಚನಃ ।
ತುಲ್ಯ ಪ್ರಿಯ ಅಪ್ರಿಯಃ ಧೀರಃ ತುಲ್ಯ ನಿಂದಾತ್ಮ ಸಂಸ್ತುತಿಃ – ಸುಖ-ದುಃಖವನ್ನು ಸಮನಾಗಿ ಕಾಣುತ್ತಾನೆ. ತನ್ನಲ್ಲೇ ತಾನು ಇದ್ದುಬಿಡುತ್ತಾನೆ. ಮಣ್ಣು, ಕಲ್ಲು, ಚಿನ್ನ ಅವನಿಗೆ ಒಂದೇ ತರಹ. ಸಾಧನೆಯಿಂದ ಬಗೆ ಗಟ್ಟಿಗೊಂಡ ಅವನಿಗೆ ಪ್ರಿಯವೂ ಒಂದೇ; ಅಪ್ರಿಯವೂ ಒಂದೇ. ತೆಗಳಿಕೆಯೂ ಒಂದೆ. ಹೊಗಳಿಕೆಯೂ ಒಂದೇ.

ತ್ರಿಗುಣಾತೀತ ಸರ್ವ ಸುಖ-ದುಃಖವನ್ನೂ ಸಮನಾಗಿ ಕಾಣುತ್ತಾನೆ. ಏಕೆಂದರೆ ನಮಗೆ ಮೇಲ್ನೋಟಕ್ಕೆ ಸುಖವೆಂದು ಕಾಣುವುದು ನಿಜವಾಗಿ ಸುಖವಾಗಿ ಇರಬೇಕೆಂದೇನೂ ಇಲ್ಲ. ಅದೇ ರೀತಿ ದುಃಖ ಕೂಡಾ. ಇದನ್ನು ತಿಳಿದಾಗ ಎಲ್ಲವೂ ಭಗವಂತನ ಲೀಲೆ ಎನ್ನುವ ಭಾವನೆ ಮನಸ್ಸಿನಲ್ಲಿ ಹುಟ್ಟುತ್ತದೆ. ಆಗ ಎಲ್ಲವನ್ನೂ ಸಮನಾಗಿ ಕಾಣುವ ಕ್ಷಮತೆ ನಮ್ಮಲ್ಲಿ ಬೆಳೆಯುತ್ತದೆ.
ನಾವು ಹೇಗೆ ನಾಟಕದಲ್ಲಿ ನಡೆಯುವ ದೃಶ್ಯವನ್ನು ಪ್ರೇಕ್ಷಕರಂತೆ ಕಾಣುತ್ತೇವೋ, ಹಾಗೇ ಪ್ರಪಂಚದಲ್ಲಿ ನಡೆಯುವ ಘಟನೆಗಳನ್ನು ಪ್ರೇಕ್ಷಕರಂತೆ ಕಾಣಲು ಅಭ್ಯಾಸ ಮಾಡಿಕೊಳ್ಳಬೇಕು. ಅದು ಸುಖಮಯವಿರಬಹುದು, ದುಃಖಮಯವಿರಬಹುದು-ಆದರೆ ನಾವು ಭಗವಂತನ ಒಂದೊಂದು ಕ್ರಿಯಯನ್ನೂ ಆಸ್ವಾಧಿಸಬೇಕು. ಜೀವನದಲ್ಲಿ ಬರುವ ತಾತ್ಕಾಲಿಕ ದುಃಖ ನಮ್ಮ ಶಾಶ್ವತ ಸುಖಕ್ಕೆ ಕಾರಣವಾಗಿರುತ್ತದೆ. ಆದರೆ ಅದು ನಮಗೆ ತಿಳಿದಿರುವುದಿಲ್ಲ ಅಷ್ಟೆ. ತ್ರಿಗುಣಾತೀತರು ಈ ವಿಷಯವನ್ನು ಅರಿತು ಸುಖ-ದುಃಖವನ್ನು ಸಮನಾಗಿ ಕಾಣುತ್ತಾ ಆನಂದದಿಂದ ಬದುಕುತ್ತಿರುತ್ತಾರೆ.
ಹಿಂದೆ ಸ್ಥಿತಪ್ರಜ್ಞ ಮತ್ತು ಭಕ್ತರ ಲಕ್ಷಣ ಹೇಳುವಾಗ ಹೇಳಿದ ಮಾತುಗಳನ್ನು ಕೃಷ್ಣ ಇಲ್ಲಿ ಮತ್ತೆ ಪುನರುಚ್ಚರಿಸುತ್ತಾನೆ. ತ್ರಿಗುಣಾತೀತನಿಗೆ ಮಣ್ಣು, ಅಮೂಲ್ಯ ರತ್ನ, ಚಿನ್ನ-ಎಲ್ಲವೂ ಒಂದೇ. ಆತನಿಗೆ ಚಿನ್ನವಾಗಲೀ, ರತ್ನವಾಗಲೀ ಅಮೂಲ್ಯ ಎಂದು ಕಾಣುವುದಿಲ್ಲ. ಆತನಿಗೆ ಅಮೂಲ್ಯ-ಜ್ಞಾನವೊಂದೇ. ಈ ಕಾರಣದಿಂದ ಆತ ಹಣದಲ್ಲಾಗಲಿ, ಮುತ್ತು-ರತ್ನದಲ್ಲಾಗಲಿ, ಬಂಗಾರದಲ್ಲಾಗಲಿ ಯಾವುದೇ ರೀತಿಯ ಅಭಿಲಾಷೆ ತೋರುವುದಿಲ್ಲ. ಆದ್ದರಿಂದ ಆತ ಸಂತೋಷದಿಂದ ಬದುಕುತ್ತಾನೆ. ಭಾಗವತದ ಮೂರನೇ ಸ್ಕಂದದಲ್ಲಿ ಬರುವ ಒಂದು ಶ್ಲೋಕ ಈ ರೀತಿ ಹೇಳುತ್ತದೆ:

ಯಶ್ಚ ಮೂಢತಮೋ ಲೋಕೇ ಯಶ್ಚ ಬುದ್ಧೇಃ ಪರಂ ಗತಃ
ತಾವುಭೌ ಸುಖಮೇಧೇತೇ ಕ್ಲಿಶ್ಯತ್ಯಂತರಿತೋ ಜನಃ ||೩-೭-೧೭||

ಒಬ್ಬ ಮೂಢ ಮತ್ತು ಇನ್ನೊಬ್ಬ ಜ್ಞಾನಿ- ಇವರಿಬ್ಬರು ಲೋಕದಲ್ಲಿ ಸುಖದಿಂದ ಬದುಕಬಲ್ಲರು ಎಂದು. ಏಕೆಂದರೆ ಇವರಿಗೆ ಹಣದ ಮೋಹವಿರುವುದಿಲ್ಲ. ಆದರೆ ಇವೆರಡರ ಮಧ್ಯದಲ್ಲಿರುವವರು-ಜೀವನದ ಅರ್ಥ ತಿಳಿಯದೆ ಮೋಹಕ್ಕೆ ಬಲಿಯಾಗಿ ದುಃಖ ಅನುಭವಿಸುತ್ತಾರೆ.
ಹೇಗೆ ಜ್ಞಾನಿಗಳು ತಮ್ಮ ಜೀವನದಲ್ಲಿ ಈ ತತ್ವವನ್ನು ಅಳವಡಿಸಿಕೊಂಡು ಬದುಕುತ್ತಾರೆ ಎನ್ನುವುದಕ್ಕೆ ರಾಮಕೃಷ್ಣ ಪರಮಹಂಸರ ಜೀವನ ಚರಿತ್ರೆ ಉತ್ತಮ ನಿದರ್ಶನ. ಮೈಸೂರು ಮಹಾರಾಜರ ಕಾಲದಲ್ಲಿ ಸೋದೆಮಠದ ಸ್ವಾಮಿಗಳಾಗಿದ್ದ ವಿಶ್ವಪ್ರಿಯತೀರ್ಥರು (ವೃಂದಾವನಾಚಾರ್ಯರು) ಬದುಕಿದ ಜೀವನ ಶೈಲಿ ಇದಕ್ಕೆ ಇನ್ನೊಂದು ಉತ್ತಮ ದೃಷ್ಟಾಂತ.

ಈ ಶ್ಲೋಕವನ್ನು ಇನ್ನೊಂದು ಮುಖದಲ್ಲಿ ನೋಡಿದಾಗ ನಮಗೆ ಇನ್ನೂ ಒಂದು ವಿಶೇಷ ಸಂದೇಶ ತಿಳಿಯುತ್ತದೆ. ಒಬ್ಬ ನಿಜವಾದ ಭಕ್ತ(ತ್ರಿಗುಣಾತೀತ)ನ ಭಗವದ್ ಭಕ್ತಿ ಆತನ ಜೀವನದಲ್ಲಿ ಬರುವ ಸುಖ-ದುಃಖಗಳಿಂದ ಏರುಪೇರಾಗುವುದಿಲ್ಲ. ಬಡತನವಿರಲಿ-ಸಿರಿತನವಿರಲಿ ಈತ ನಿರಂತರ ಭಗವಂತನ ಭಕ್ತಿಯಲ್ಲಿ ತೊಡಗಿರುತ್ತಾನೆ. ಈತನ ಭಕ್ತಿಗೆ ಇನ್ನೊಬ್ಬರ ಪ್ರೀತಿ-ದ್ವೇಷ ಎಂದೂ ಮಾನದಂಡವಲ್ಲ. ಈ ರೀತಿ ತ್ರಿಗುಣಾತೀತರು ಎಲ್ಲಾ ಸ್ಥಿತಿಯಲ್ಲೂ ಸಮಾನತೆಯಿಂದ ಬದುಕುತ್ತಾರೆ.

ಮಾನಾಪಮಾನಯೋಸ್ತುಲ್ಯಸ್ತುಲ್ಯೋ ಮಿತ್ರಾರಿಪಕ್ಷಯೋಃ ।
ಸರ್ವಾರಂಭಪರಿತ್ಯಾಗೀ ಗುಣಾತೀತಃ ಸ ಉಚ್ಯತೇ ॥೨೫॥

ಮಾನ ಅಪಮಾನಯೋಃ ತುಲ್ಯಃ ತುಲ್ಯಃ ಮಿತ್ರ ಅರಿ ಪಕ್ಷಯೋಃ ।
ಸರ್ವಾರಂಭ ಪರಿತ್ಯಾಗೀ ಗುಣಾತೀತಃ ಸಃ ಉಚ್ಯತೇ -- ಸಮ್ಮಾನವೂ ಒಂದೇ; ಅಪಮಾನವೂ ಒಂದೇ. ಗೆಳೆಯರ ಬಳಗವೂ ಒಂದೇ; ಹಗೆಯರ ಬಳಗವೂ ಒಂದೇ. ಅವನು ಇಂತಹ ಯಾವ ಲೌಕಿಕದಲ್ಲೂ ತೊಡಗಿಕೊಳ್ಳುವುದಿಲ್ಲ. ಅಂತವನು 'ಗುಣಾತೀತ' ಎನ್ನಿಸುತ್ತಾನೆ.

ತ್ರಿಗುಣಾತೀತರನ್ನು ಒಬ್ಬರು 'ಮಹಾನ್ ಜ್ಞಾನಿ' ಎಂದು ಸಮ್ಮಾನಿಸಿ ಮಾತನಾಡಬಹುದು, ಇನ್ನೊಬ್ಬರು ಆತ 'ಅರೆಹುಚ್ಚ' ಎಂದು ನಿಂದಿಸಬಹುದು. ಆದರೆ ಇದ್ಯಾವುದೂ ಅವರ ಮೇಲೆ ಪರಿಣಾಮಬೀರದು. ಇವರಿಗೆ ಸ್ನೇಹಿತರು ಎನ್ನುವ ಮೋಹವಾಗಲೀ, ಶತ್ರುಗಳು ಎನ್ನುವ ದ್ವೇಷವಾಗಲೀ ಇರುವುದಿಲ್ಲ. ಇವರು ಎಲ್ಲರನ್ನೂ ಅವರವರ ಯೋಗ್ಯತೆಗೆ ತಕ್ಕಂತೆ ಕಾಣುತ್ತಾ, ಭಗವಂತನ ಭಕ್ತಿಗೆ ವಿರುದ್ಧವಾದ ಯಾವ ಚಟುವಟಿಕೆಯಲ್ಲೂ ತೊಡಗದೇ ಬದುಕುತ್ತಾರೆ. ಇವರು ದೀರ್ಘಕಾಲದ ಯಾವುದೇ ಯೋಜನೆಯಲ್ಲಿ ತಮ್ಮನ್ನು ತಾವು ತೊಡಗಿಸಿಕೊಳ್ಳುವುದಿಲ್ಲ.
ಹೀಗೆ ಮೇಲಿನ ನಾಲ್ಕು ಶ್ಲೋಕದಲ್ಲಿ ಗುಣಾತೀತರ ಸ್ವಭಾವದ ಪೂರ್ಣ ಚಿತ್ರಣವನ್ನು ಕೃಷ್ಣ ಸುಂದರವಾಗಿ ವರ್ಣಿಸಿದ. ಈ ಸ್ವಭಾವವುಳ್ಳವರನ್ನು ನಾವು ಗುಣಾತೀತರೆಂದು ಗುರುತಿಸಬಹುದು.

ಇಲ್ಲಿಯ ತನಕ ತ್ರಿಗುಣಗಳ ಬಗ್ಗೆ ಮತ್ತು ತ್ರಿಗುಣಾತೀತರ ಸ್ವಭಾವದ ಬಗ್ಗೆ ವಿವರಿಸಿದ ಕೃಷ್ಣ, ಕೊನೆಯ ಎರಡು ಶ್ಲೋಕದಲ್ಲಿ ನಾವು ತ್ರಿಗುಣಾತೀತರಾಗುವ ಬಗೆ ಹೇಗೆ ಎನ್ನುವುದನ್ನು ವಿವರಿಸುತ್ತಾನೆ. ನಮ್ಮ ಎಲ್ಲಾ ಪ್ರವೃತ್ತಿಯೂ ಈ ಮೂರು ಗುಣಗಳ ಪರಿಮಿತಿಯಲ್ಲಿ ಇರುವಾಗ ತ್ರಿಗುಣವನ್ನು ಮೀರಿ ನಿಲ್ಲುವುದು ನಮಗೆ ಕಲ್ಪನಾತೀತ. ಹಾಗಾಗಿ ಇಲ್ಲಿ ಕೃಷ್ಣ ನಮಗೆ ತ್ರಿಗುಣಾತೀತರಾಗಲು ಇರುವ ಏಕಮಾತ್ರ ಮಾರ್ಗವನ್ನು ವಿವರಿಸುತ್ತಾನೆ.

ಮಾಂ ಚ ಯೋಽವ್ಯಭಿಚಾರೇಣ ಭಕ್ತಿಯೋಗೇನ ಸೇವತೇ ।
ಸ ಗುಣಾನ್ ಸಮತೀತ್ಯೈತಾನ್ ಬ್ರಹ್ಮಭೂಯಾಯ ಕಲ್ಪತೇ ॥೨೬॥

ಮಾಮ್ ಚ ಯಃ ಅವ್ಯಭಿಚಾರೇಣ ಭಕ್ತಿಯೋಗೇನ ಸೇವತೇ ।
ಸಃ ಗುಣಾನ್ ಸಮತೀತ್ಯ ಏತಾನ್ ಬ್ರಹ್ಮಭೂಯಾಯ ಕಲ್ಪತೇ – ನನ್ನನ್ನು ಎಡೆಬಿಡದೆ ಭಕ್ತಿಯಿಂದ ಆರಾಧಿಸುವವನು ಈ ಗುಣಗಳ ಕಟ್ಟನ್ನು ಹರಿದು, ಚೇತನ ಪ್ರಕೃತಿಯಂತೆ ಭಗವಂತನ ಭಕ್ತಿಗೆ ಪಾತ್ರನಾಗುತ್ತಾನೆ.[ಚೇತನ ಪ್ರಕೃತಿಯನ್ನು ಸೇರುತ್ತಾನೆ].

ನಾವು ನಾವಾಗಿ ತ್ರಿಗುಣಾತೀತರಾಗಬೇಕು ಎಂದು ಪ್ರಯತ್ನಿಸಿದರೆ ಆ ಪ್ರಯತ್ನದಲ್ಲಿ ನಾವು ಯಶಸ್ಸನ್ನು ಕಾಣಲು ಸಾಧ್ಯವಿಲ್ಲ. ಏಕೆಂದರೆ ನಮ್ಮ ಎಲ್ಲಾ ಯೋಚನೆ ತ್ರಿಗುಣದಲ್ಲೇ ಸುತ್ತುತ್ತಿರುತ್ತದೆ. ಇದೊಂದು ಚಕ್ರಭ್ರಮಣ. ಈ ಚಕ್ರ ಭ್ರಮಣದಿಂದ ಪಾರು ಮಾಡಲು ಆ ಚಕ್ರಧಾರಿಯೇ ಬರಬೇಕು. ದ್ವಾದಶಸ್ತೋತ್ರದಲ್ಲಿ ಹೇಳುವಂತೆ: "ತ್ರಿಗುಣಾತೀತ ವಿಧಾರಕ ಪರಿತೋ ದೇಹಿ ಸುಭಕ್ತಿಮ್". ತ್ರಿಗುಣಾತೀತರನ್ನು ಧಾರಣೆ ಮಾಡುವವ ಆ ಭಗವಂತ. ಆದ್ದರಿಂದ ತ್ರಿಗುಣಾತೀತರಾಗಲು ಇರುವ ಮಾರ್ಗ ಒಂದೇ-ಆ ಭಗವಂತನಲ್ಲಿ ಶರಣಾಗುವುದು. ಲಕ್ಷ್ಮೀಸಮೇತನಾದ ಆ ಭಗವಂತನಲ್ಲಿ ಏಕನಿಷ್ಠೆಯಿಂದ ಅನನ್ಯ ಭಕ್ತಿ ಮಾಡುವುದರಿಂದ – ಲಕ್ಷ್ಮಿಯಿಂದ ಹದಿನೈದು ಬಂಧನದ ಬೇಲಿಯನ್ನು ಧರಿಸಿ ಪ್ರಪಂಚಕ್ಕೆ ಬಂದ ನಾವು, ಈ ಎಲ್ಲಾ ಬಂಧವನ್ನು ಕಳಚಿಕೊಂಡು ಮರಳಿ ತಾಯಿಯ ಮಡಿಲನ್ನು ಸೇರಬಹುದು.

ಬ್ರಹ್ಮಣೋ ಹಿ ಪ್ರತಿಷ್ಠಾಽಹಮಮೃತಸ್ಯಾವ್ಯಯಸ್ಯ ಚ ।
ಶಾಶ್ವತಸ್ಯ ಚ ಧರ್ಮಸ್ಯ ಸುಖಸ್ಯೈಕಾಂತಿಕಸ್ಯ ಚ ` ॥೨೭॥

ಬ್ರಹ್ಮಣಃ ಹಿ ಪ್ರತಿಷ್ಠಾ ಅಹಮ್ ಅಮೃತಸ್ಯ ಅವ್ಯಯಸ್ಯ ಚ ।
ಶಾಶ್ವತಸ್ಯ ಚ ಧರ್ಮಸ್ಯ ಸುಖಸ್ಯ ಐಕಾಂತಿಕಸ್ಯ ಚ –ಅಳಿವಿರದ ಬದಲಾಗದ ಚಿತ್ ಪ್ರಕೃತಿಗೂ ನಾನೇ ಆಸರೆ-ನೆಲೆ. ಸನಾತನ ಧರ್ಮಕ್ಕೆ ಮತ್ತು ಕೇವಲ ಸುಖಮಯವಾದ ಮೋಕ್ಷಕ್ಕೆ ಕೂಡಾ.

ಮೂರು ಗುಣಗಳನ್ನು ಮೀರಿ ನಿಂತಾಗ ಜೀವದ ಸಹಜ-ಶಾಶ್ವತ ಧರ್ಮ ಅಭಿವ್ಯಕ್ತವಾಗುತ್ತದೆ. ಈ ಸ್ಥಿತಿಯಲ್ಲಿ ಬ್ರಹ್ಮತತ್ವವಾದ ಚಿತ್ ಪ್ರಕೃತಿ(ಶ್ರೀಲಕ್ಷ್ಮಿ)ಗೂ ಆಸರೆಯಾದ ಆ ಭಗವಂತವಂತನನ್ನು ಮೋಕ್ಷದಲ್ಲಿ ಸೇರಬಹುದು.

ಇತಿ ಚತುರ್ದಶೋಽಧ್ಯಾಯಃ
ಹದಿನಾಲ್ಕನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಹದಿನೈದು

ಈ ಅಧ್ಯಾಯ ಗೀತೆಯಲ್ಲೇ ಅತ್ಯಂತ ಚಿಕ್ಕ ಅಧ್ಯಾಯ. ಇಲ್ಲಿ ಫಲಶ್ರುತಿಯ ಎರಡು ಶ್ಲೋಕಗಳನ್ನು ಬಿಟ್ಟರೆ, ಪ್ರಮೇಯ ಭಾಗವನ್ನು ಹೇಳುವ ಹದಿನೆಂಟು ಶ್ಲೋಕಗಳಿವೆ. ಈ ಹದಿನೆಂಟು ಶ್ಲೋಕದಲ್ಲಿ ಕೃಷ್ಣ ಇಡೀ ವಿಶ್ವದ ರಹಸ್ಯವನ್ನು ತೆರೆದಿಟ್ಟಿದ್ದಾನೆ. ಮಹಾಭಾರತ ಭಾರತೀಯ ತತ್ವಶಾಸ್ತ್ರದ ಸಾರವಾದರೆ, ಭಗವದ್ಗೀತೆ ಮಹಾಭಾರತದ ಸಾರ. ಇಂತಹ ಭಗವದ್ಗೀತೆಯ ಸಾರ ಈ ಹದಿನೈದನೇ ಅಧ್ಯಾಯ. ಈ ಅಧ್ಯಾಯವನ್ನು ಅರ್ಥ ಮಾಡಿಕೊಂಡರೆ ಇಡೀ ಗೀತೆಯನ್ನಷ್ಟೇ ಅಲ್ಲ, ಇಡೀ ಭಾರತೀಯ ತತ್ವಶಾಸ್ತ್ರವನ್ನು ಅರ್ಥ ಮಾಡಿಕೊಂಡಂತೆ. ಶಂಕರಾಚಾರ್ಯರು ಈ ಅಧ್ಯಾಯಕ್ಕೆ ವ್ಯಾಖ್ಯಾನ ಬರೆಯುತ್ತಾ ಹೇಳುತ್ತಾರೆ: "ನ ಕೇವಲಂ ಗೀತಾರ್ಥಃ , ಕಿಂತು ಸರ್ವೋಽಪಿ ಶಾಸ್ತ್ರಾರ್ಥಃ ಅತ್ರ ಪರ್ಯವಸಿತಃ" ಎಂದು. "ಇದು ಕೇವಲ ಗೀತೆಯ ಸಾರ ಅಲ್ಲ. ಎಲ್ಲಾ ಶಾಸ್ತ್ರಗಳು ಏನನ್ನು ಹೇಳುತ್ತವೆಯೋ ಅದೆಲ್ಲವೂ ಈ ಅಧ್ಯಾಯದಲ್ಲಡಗಿದೆ". **The quintessence of entire Indian Philosophy is 15th Chapter of Bhagavad Gita.** ಮಧ್ವಾಚಾರ್ಯರು ತಮ್ಮ ಹೆಚ್ಚಿನ ಗ್ರಂಥಗಳಲ್ಲಿ ಈ ಅಧ್ಯಾಯದ ಮೂರು ಶ್ಲೋಕಗಳನ್ನು(೧೬,೧೭,೧೮) ಉಲ್ಲೇಖ ಮಾಡುತ್ತಾರೆ. ಏಕೆಂದರೆ ಈ ಶ್ಲೋಕಗಳಲ್ಲೇ ಆಚಾರ್ಯರ ಎಲ್ಲಾ ಸಿದ್ಧಾಂತದ ಸಾರ ಅಡಗಿದೆ.

ಹಿಂದಿನ ಕಾಲದಲ್ಲಿ ಒಂದು ಸಂಪ್ರದಾಯವಿತ್ತು. ಊಟಕ್ಕೆ ಕುಳಿತಾಗ, ಊಟ ಪ್ರಾರಂಭಿಸುವ ಪೂರ್ವದಲ್ಲಿ ಈ ಅಧ್ಯಾಯದ ಶ್ಲೋಕವನ್ನು ಹೇಳಿ ಆಮೇಲೆ ಊಟ ಮಾಡುವುದು. 'ಊಟದ ಎಲೆಯ ಮುಂದೆ ಇಡೀ ಶಾಸ್ತ್ರದ ಸಾರವನ್ನು ನಾವು ಅನುಸಂಧಾನ ಮಾಡಿದಂತಾಯಿತು' ಎನ್ನುವುದು ಆ ಸಂಪ್ರದಾಯದ ಹಿಂದಿನ ಕಾರಣ.

ಹದಿಮೂರನೇ ಅಧ್ಯಾಯದಲ್ಲಿ ಕ್ಷೇತ್ರ ಮತ್ತು ಕ್ಷೇತ್ರಜ್ಞರ ಬಗ್ಗೆ ಕೃಷ್ಣ ವಿವರಿಸಿದ್ದ. ವಿಶ್ವ ಮತ್ತು ವಿಶ್ವದ ನಿಯಾಮಕ ಭಗವಂತನ ವಿಷಯವನ್ನೇ ಇನ್ನೂ ಸ್ಪಷ್ಟವಾಗಿ, ಇನ್ನೊಂದು ಮುಖದೊಂದಿಗೆ ಈ ಅಧ್ಯಾಯದಲ್ಲಿ ಕೃಷ್ಣ ವಿವರಿಸುತ್ತಾನೆ. ಪ್ರಕೃತಿ ಮತ್ತು ಪ್ರಾಕೃತ ವಿಶ್ವ, ಆ ವಿಶ್ವವನ್ನು ದಾಟುವ ಬಗೆ ಮತ್ತು ಕೊನೆಯದಾಗಿ ಇಡೀ ತತ್ವಜ್ಞಾನದ ಸಂಗ್ರಹ ಈ ಅಧ್ಯಾಯದಲ್ಲಿದೆ. ನಾವು ತಿಳಿದುಕೊಳ್ಳಬೇಕಾದ ವಿಶಿಷ್ಟವಾದ ಅರಿವಿನ ಸಂದೇಶವನ್ನು ಕೃಷ್ಣ ಈ ಅಧ್ಯಾಯದ ಮೂಲಕ ಕೊಟ್ಟಿದ್ದಾನೆ.

ಚೇತನಾಚೇತನ ವಿಶ್ವ-'ಕ್ಷರ'. ಅದರಿಂದಾಚೆಗೆ ಇರುವ ಚಿತ್ಪ್ರಕೃತಿ-'ಅಕ್ಷರ'ಳು. ಅದರಿಂದಾಚೆಗಿರುವ ಸರ್ವ ನಿಯಾಮಕ ಭಗವಂತ-'ಪುರುಷೋತ್ತಮ'. ಹನ್ನೆರಡನೇ ಅಧ್ಯಾಯದ ಪ್ರಾರಂಭದಲ್ಲಿ ವಿವರಿಸಿದಂತೆ- ಹದಿನೈದು ಬೇಲಿಗಳಿಂದ ಆವೃತವಾಗಿರುವ ಹದಿನಾರನೆಯವ ಜೀವ. ಈ ಹದಿನೈದನ್ನು ಹದಿನಾರರ ಸುತ್ತ ಬಿಗಿದವಳು ಹದಿನೇಳನೆಯವಳಾದ ಶ್ರೀಲಕ್ಷ್ಮಿ. ಈ ಬೇಲಿಯಿಂದ ಬಿಡಿಸಿ ನಮಗೆ ಮೋಕ್ಷ ಕೊಡತಕ್ಕವನು ಹದಿನೆಂಟನೆಯವನಾದ ಪುರುಷೋತ್ತಮ. [ಈ ಹದಿನೈದು ಬೇಲಿಗಳ ಬಗ್ಗೆ ವಿವರವಾಗಿ ತಿಳಿಯಲು ಪ್ರಶ್ನೋಪನಿಷತ್ತಿನ ಆರನೇ ಪ್ರಶ್ನೆಯನ್ನು ನೋಡಿ. ಶ್ರದ್ಧಾಂ ಖಂ ವಾಯುಃ ಜ್ಯೋತಿಃ ಆಪಃ ಪೃಥಿವಿ ಇಂದ್ರಿಯಂ ಮನಃ । ಅನ್ನಮನ್ನಾದಿ ವೀರ್ಯಂ ತಪೋ ಮಂತ್ರಾಃ ಕರ್ಮ ಲೋಕಾಃ ಲೋಕೇಷು ಚ ನಾಮ ಚ || ೬-೪|| ಇವೇ ಆ ಹದಿನೈದು ಬೇಲಿಗಳು].

'ಹದಿನೆಂಟು' ತತ್ವಶಾಸ್ತ್ರದ ಸಮಷ್ಟಿಯನ್ನು ನಮ್ಮ ಮುಂದಿಡತಕ್ಕಂತಹ ಒಂದು ಸಂಖ್ಯೆ. ಈ ಅಧ್ಯಾಯದಲ್ಲಿ ಹದಿನೆಂಟು ಶ್ಲೋಕಗಳ ಮೂಲಕ ಕೃಷ್ಣ ಸಮಸ್ತ ಶಾಸ್ತ್ರದ ಸಾರವನ್ನು ನಮ್ಮ ಮುಂದೆ ತೆರೆದಿಟ್ಟಿದ್ದಾನೆ. ಬನ್ನಿ ಈ ಅಪೂರ್ವ ಅಧ್ಯಾಯವನ್ನು ಕೃಷ್ಣನಿಂದ ಕೇಳಿ ತಿಳಿಯೋಣ.

ಭಗವಾನುವಾಚ ।
ಊರ್ಧ್ವಮೂಲಮಧಃಶಾಖಮಶ್ವತ್ಥಂ ಪ್ರಾಹುರವ್ಯಯಮ್।
ಛಂದಾಂಸಿ ಯಸ್ಯ ಪರ್ಣಾನಿ ಯಸ್ತಂ ವೇದ ಸ ವೇದವಿತ್ ॥೧॥

ಭಗವಾನ್ ಉವಾಚ-ಭಗವಂತ ಹೇಳಿದನು:
ಊರ್ಧ್ವಮೂಲಮ್ ಅಧಃ ಶಾಖಮ್ ಅಶ್ವತ್ಥಮ್ ಪ್ರಾಹುಃ ಅವ್ಯಯಮ್ ।
ಛಂದಾಂಸಿ ಯಸ್ಯ ಪರ್ಣಾನಿ ಯಸ್ತಂ ವೇದ ಸಃ ವೇದವಿತ್ –ಮೇಲಿರುವ ಭಗವಂತ ಮತ್ತು ಪ್ರಕೃತಿ ವಿಶ್ವದ ಬುಡಕಟ್ಟು. ಕೆಳಗಿನ ಜೀವ-ಜಡಗಳು ಇದರ ಟೊಂಗೆ-ಟಿಸಿಲು. ಇದು ಎಂದೆಂದೂ ಇರುವ,[ಅ+ಶ್ವಃ+ತ್ಥ= ಇಂದು ಇದ್ದಂತೆ ನಾಳೆ ಇರದ],[ಅಶ್ವ+ತ್ಥ=ಕುದುರೆಯಂತೆ ನಿರಂತರ ಚಲನಶೀಲವಾದ] ಅರಳಿಯ ಮರ. ವೇದಗಳು ಇದರ ಎಲೆಗಳು. ಇದನ್ನು ಬಲ್ಲವನು ವೇದಗಳನ್ನು ಬಲ್ಲವನು.

ಉಪನಿಷತ್ತಿನ ಸಾರವೇ ಭಗವದ್ಗೀತೆ ಎನ್ನುವುದಕ್ಕೆ ಈ ಶ್ಲೋಕವೇ ಸಾಕ್ಷಿ. ಕಠೋಪನಿಷತ್ತಿನಲ್ಲಿ ಹೀಗೆ ಹೇಳಿದ್ದಾರೆ: "ಊರ್ಧ್ವಮೂಲೋ ಅವಾಕ್ ಶಾಖಃ ಏಷೋ ಅಶ್ವತ್ಥಃ ಸನಾತನಃ" ಎಂದು. ಇಲ್ಲಿ ಅದನ್ನು "ಊರ್ಧ್ವಮೂಲಮ್ ಅಧಃ ಶಾಖಮ್ ಅಶ್ವತ್ಥಮ್ ಪ್ರಾಹುಃ ಅವ್ಯಯಮ್" ಎಂದು ಹೇಳಿದ್ದಾರೆ. ಇದು ವಿಷಯ ಗರ್ಭಿತವಾದ ಸಾಲು. ಇಲ್ಲಿರುವ ಒಂದೊಂದು ಪದದಲ್ಲೂ ತತ್ವಶಾಸ್ತ್ರದ ಅನೇಕ ವಿಷಯಗಳು ಅಡಗಿವೆ.
ನೇರವಾಗಿ ಈ ಸಾಲನ್ನು ಕನ್ನಡಕ್ಕೆ ಭಾಷಾಂತರಿಸಿದರೆ "ಈ ವಿಶ್ವವೇ ಒಂದು ಅರಳಿ ಮರ. ಇದರ ಬುಡ ಇರುವುದು ಮೇಲೆ, ಟೊಂಗೆ-ಟಿಸಿಲುಗಳಿರುವುದು ಕೆಳಗೆ" ಎಂದಾಗುತ್ತದೆ. ಮೇಲ್ನೋಟಕ್ಕೆ ಈ ಸಾಲನ್ನು ನೋಡಿದರೆ ನಮಗೆ ಏನೂ ಅರ್ಥವಾಗುವುದಿಲ್ಲ. 'ಶೀರ್ಷಾಸನ ಮಾಡುತ್ತಿರುವ ಅರಳಿ ಮರ'- ಏನಿದು? ಅದರಲ್ಲೂ ಅಶ್ವತ್ಥ ಮರವನ್ನೇ ಕೃಷ್ಣ ಏಕೆ ಹೇಳಿದ? ಹಣ್ಣನ್ನೂ ಕೊಡದ, ಹೂವನ್ನೂ ಬಿಡದ, ಮನೆಕಟ್ಟಲೂ ಸಹಾಯಕವಲ್ಲದ ಈ ಮರದ ಪ್ರಸ್ತಾಪ ಏಕೆ? ಇದು ಅರ್ಥವಾಗಬೇಕಾದರೆ ನಾವು 'ಅಶ್ವತ್ಥ' ಪದದ ಹಿಂದಿರುವ ಅರ್ಥವನ್ನು ಹುಡುಕಬೇಕು. ಮೇಲ್ನೋಟದ ಅರ್ಥದಿಂದ ಒಂದೊಂದಾಗಿ ಎಳೆ-ಎಳೆಯಾಗಿ ಒಳಹೊಗಬೇಕು.
(೧) ಅಶ್ವತ್ಥ ಅನ್ನುವುದಕ್ಕೆ ಸ್ಥೂಲ ಅರ್ಥ ಅರಳಿ ಮರ. ಪ್ರಪಂಚದಲ್ಲಿರುವ ಎಲ್ಲಾ ಮರಗಳಿಗಿಂತ ಈ ಮರ ಭಿನ್ನ. ಗಾಳಿಯ ಸುಳಿಯೇ ಇಲ್ಲದೆ ಎಲ್ಲಾ ಮರಗಳೂ ಸ್ಥಬ್ಧವಾಗಿರುವಾಗ , ಸಣ್ಣ ಗಾಳಿಯ ಎಳೆ ಬಂದರೆ ಯಾವ ಮರವೂ ಅಲ್ಲಾಡುವುದಿಲ್ಲ. ಆದರೆ ಅಶ್ವತ್ಥಮರದ ಎಲೆಗಳು ಗಿಲಿ-ಗಿಲಿ ಎಂದು ಹಂದಾಡಲು ಆರಂಭಿಸುತ್ತವೆ. ಅಶ್ವತ್ಥಕ್ಕೆ ಸಂಸ್ಕೃತದಲ್ಲಿ 'ಚಲಧರಃ' ಎಂದೂ ಕರೆಯುತ್ತಾರೆ. ಅಂದರೆ ಯಾವಾಗಲೂ ಚಲನಶೀಲವಾದ ಎಲೆಗಳುಳ್ಳ ಮರ ಎಂದರ್ಥ. ಇದೇ ಪ್ರಪಂಚಕ್ಕೂ ಮತ್ತು ಅಶ್ವತ್ಥಮರಕ್ಕೂ ಇರುವ ಸಾಮ್ಯ. ಪ್ರಪಂಚ ಕೂಡಾ ಯಾವಾಗಲೂ ಚಲನಶೀಲ. ಅದು ಸದಾ ಚಲಿಸುತ್ತಾ ಬದಲಾಗುತ್ತಾ ಇರುತ್ತದೆ.

(೨) ಅಶ್ವ+ತ್ಥ: ಇಲ್ಲಿ ಅಶ್ವ ಎಂದರೆ ಕುದುರೆ. ಪ್ರಪಂಚ ಅಶ್ವದ ಹಾಗೆ ಇರುವಂತಹದ್ದು. ಕುದುರೆಯನ್ನು ಗಮನಿಸಿದರೆ ನಮಗೆ ಈ ಅರ್ಥ ತಿಳಿಯುತ್ತದೆ. ಇತರ ಪ್ರಾಣಿಗಳಿಗೂ ಕುದುರೆಗೂ ಒಂದು ವ್ಯತ್ಯಾಸವಿದೆ. ಎಲ್ಲಾ ಪ್ರಾಣಿಗಳೂ ವಿಶ್ರಾಮದ ಕಾಲದಲ್ಲಿ ನಿಶ್ಚಲವಾಗಿ ನಿಲ್ಲಬಲ್ಲವು. ಆದರೆ ಕುದುರೆ ಒಂದು ಕ್ಷಣವೂ ನಿಶ್ಚಲವಾಗಿ ನಿಲ್ಲದು. ಈ ಜಗತ್ತೂ ಕೂಡಾ ಅಶ್ವದಂತೆ. ಇದು ಎಂದೂ ಸ್ಥಿರವಾಗಿ ನಿಲ್ಲುವುದಿಲ್ಲ.

(೩) ಅ+ಶ್ವ+ತ್ಥ –ಇಲ್ಲಿ 'ಶ್ವ' ಅಂದರೆ ನಾಳೆ, 'ತ್ಥ' ಅಂದರೆ ಇರುವಂಥದ್ದು. ಅಶ್ವತ್ಥ ಅಂದರೆ "ನ ಶ್ವ ತಿಷ್ಠತಿ". ಇಂದು ಇದೆ ಆದರೆ ನಾಳೆ ಇರುತ್ತದೆ ಎನ್ನುವ ಖಾತರಿ ಇಲ್ಲ. ಅಂದರೆ ಈ ಪ್ರಪಂಚ ಕ್ಷಣಿಕ. ಕಠೋಪನಿಷತ್ತಿನಲ್ಲಿ ಯಮ-ನಚಿಕೇತನಲ್ಲಿ "ನಿನಗೆ ಯಾವ ಸುಖಭೋಗ ಬೇಕಿದ್ದರೂ ಕೊಡುತ್ತೇನೆ" ಎಂದಾಗ, ನಚಿಕೇತ ಹೇಳುತ್ತಾನೆ: "ಶ್ವೋಭಾವಾ ಮರ್ತ್ಯಸ್ಯ ಯದಂತಕೈತತ್   ಸರ್ವೇಂದ್ರಿಯಾಣಾಂ ಜರಯಂತಿ ತೇಜಃ" ಎಂದು(೧-೨೬). "ಸದಾ ಬದಲಾಗುತ್ತಿರುವ  ಕ್ಷಣಿಕವಾದ ಈ ಪ್ರಪಂಚದಲ್ಲಿ, ನಮ್ಮನ್ನು ಕಿತ್ತು ತಿನ್ನುವ ಭೋಗ ನನಗೆ ಬೇಡ, ಬದಲಿಗೆ ಜ್ಞಾನವನ್ನು ಕೊಡು" ಎಂದು ನಚಿಕೇತ ಕೇಳುತ್ತಾನೆ. ಬದಲಾವಣೆಯೇ ಜಗದ ನಿಯಮ.

(೪) ಅಶ್ವತ್ಥದ ಶಾಸ್ತ್ರೀಯ ನಿರ್ವಚನ ಅರ್ಥವನ್ನು ನೋಡಿದರೆ(etymologicaly)- ಅಶು+ವಾ+ತ+ಥ. ಇಲ್ಲಿ ಅಶು+ವಾ ಎಂದರೆ ಎಲ್ಲಕ್ಕಿಂತ ವೇಗವಾಗಿ ಹೋಗುವಂತಹದ್ದು-ಅದು ಭಗವಂತ. ಅದಕ್ಕಾಗಿ ಭಗವಂತನನ್ನು 'ಅಶ್ವ' ಎಂದೂ ಕರೆಯುತ್ತಾರೆ. ಕುದುರೆ ಮುಖದ ಹಯಗ್ರೀವ ರೂಪದಲ್ಲಿ ಭಗವಂತ ಸಮಸ್ತ ವೇದ ವಿದ್ಯೆಯನ್ನು ಪ್ರಪಂಚಕ್ಕೆ ಕೊಟ್ಟ. ಎಲ್ಲವನ್ನೂ ಎಲ್ಲಕ್ಕಿಂತ ಮೊದಲು ತಿಳಿದ ಭಗವಂತ ಈ ಜಗತ್ತಿನಲ್ಲಿ, ಇದರ ಒಳಗೂ ಹೊರಗೂ ನಿಯಮನ ಮಾಡುವುದಕ್ಕೋಸ್ಕರ 'ಅಶ್ವ' ನಾಮಕನಾಗಿ ಕೂತಿದ್ದಾನೆ(ತ್ಥ). ಈತ ಇಡೀ ಪ್ರಪಂಚದಲ್ಲಿ 'ತತ'(ತುಂಬಿದ್ದಾನೆ) ಮತ್ತು ಕೊನೆಗೆ ಇಡೀ ಜಗತ್ತು ಆತನಿಗೆ ಥಂ.(ಥಂ =ಆಹಾರ -ಇಡೀ ಜಗತ್ತನ್ನು ಕಬಳಿಸುವ ಶಕ್ತಿ, ಇದು ಪ್ರಳಯದ ವಿವರಣೆ).

ಇವು ನಾವು 'ಅಶ್ವತ್ಥ' ಎನ್ನುವ ಪದದಲ್ಲಿ ಕಾಣಬಹುದಾದ ಅರ್ಥ. ಈ ರೀತಿ ಒಂದು ಪದದಲ್ಲಿ ಅನೇಕ ವಿಷಯಗಳನ್ನು ತುಂಬಿಸಲು ಬೇರೆ ಯಾವ ಭಾಷೆಯಲ್ಲೂ ಸಾಧ್ಯವಿಲ್ಲ. ಅದಕ್ಕಾಗಿ ಸಂಸ್ಕೃತವನ್ನು ಗರ್ಭಿಣಿ (ಅರ್ಥಗರ್ಭಿತ) ಭಾಷೆ ಎನ್ನುತ್ತಾರೆ. ಇಲ್ಲಿ ಹೇಳಿದ ಮರದ ಕಲ್ಪನೆ ಮತ್ತು ವಿವರಣೆ ಬೈಬಲ್ ನಲ್ಲಿ ಕೂಡಾ ಕಾಣಬಹುದು. ಅಲ್ಲಿ ಅವರು ಮರಕ್ಕೆ "The Garden of Eden" ಎಂದಿದ್ದಾರೆ. ಅಲ್ಲಿ ಹೇಳುತ್ತಾರೆ: but of the tree of the knowledge of good and evil, you shall not eat of it; for in the day that you eat of it you will surely die." ಅಂದರೆ: "ಈ ಮರ ಹಣ್ಣು ಬಿಡುತ್ತದೆ; ಈ ಹಣ್ಣನ್ನು ತಿಂದರೆ ನೀನು ಸಾಯುತ್ತೀಯ" ಎಂದು. ಇಲ್ಲಿ ಹಣ್ಣು ಅಂದರೆ ಅದು ಕರ್ಮಫಲ. ಕರ್ಮಫಲ ಅಪೇಕ್ಷೆ(demand) ಮಾಡುವವ ಸಾವಿಲ್ಲದ ಮೋಕ್ಷವನ್ನು ಪಡೆಯಲಾರ. ಆತ ನಿರಂತರ ಹುಟ್ಟು ಸಾವಿನ ಚಕ್ರದಲ್ಲಿ ಸುತ್ತುತ್ತಾನೆ ಎನ್ನುವುದು ಈ ಸಾಲಿನ ಒಳಾರ್ಥ.

"ಪ್ರಾಹುಃ ಅವ್ಯಯಮ್" ಎನ್ನುವಲ್ಲಿ 'ಪ್ರಾಹುಃ' ಎಂದರೆ ತಿಳಿದು ಹೇಳುವುದು. "ವೇದಕಾಲದ ಋಷಿಗಳು ಈ ಪ್ರಪಂಚ ಒಂದು  ಅಶ್ವತ್ಥ ಎಂದು ತಿಳಿದು ಹೇಳಿದ್ದಾರೆ" ಎನ್ನುತ್ತಾನೆ ಕೃಷ್ಣ. "ಈ ಪ್ರಪಂಚ ನಶ್ವರ, ಒಂದು ದಿನ ನಾಶವಾಗುವಂತಹದ್ದು" ಎಂದು ಹೇಳಿ, ತಕ್ಷಣ ಕೃಷ್ಣ ಹೇಳುತ್ತಾನೆ-"ಇದು ಅವ್ಯಯ" ಎಂದು! ಅಂದರೆ ನಾಶವಿಲ್ಲದ್ದು! ಇದು ಅರ್ಥವಾಗಬೇಕಾದರೆ ನಾವು ಸಮುದ್ರ ತಡಿಯಲ್ಲಿ ಹೋಗಿ ಕುಳಿತು ಅಲ್ಲಿ ಬರುವ ತೆರೆಗಳನ್ನು ಗಮನಿಸಬೇಕು. ಪ್ರತಿಯೊಂದು ತೆರೆಯೂ ಕೂಡಾ ಅಬ್ಬರದಿಂದ ಬರುತ್ತದೆ. ಅಲ್ಲಿ ಯಾವ ತೆರೆಯೂ ಶಾಶ್ವತವಲ್ಲ. ಎಲ್ಲಾ ತೆರೆಯೂ ಕ್ಷಣಿಕ. ಆದರೆ ಸಮುದ್ರದಲ್ಲಿ ತೆರೆ ಇಲ್ಲದ ಕ್ಷಣವಿಲ್ಲ. ಅದು ಅವ್ಯಯ. ಅದೇ ರೀತಿ ಒಂದು ಪ್ರಪಂಚ

ನಾಶವಾಗುತ್ತದೆ, ಇನ್ನೊಂದು ಪ್ರಪಂಚ ಹುಟ್ಟುತ್ತದೆ. ಪ್ರಪಂಚ ನಾಶವಾಗಬಹುದು ಆದರೆ ಪ್ರಪಂಚದ ಪ್ರವಾಹ ನಿರಂತರ. ಒಂದು ಪ್ರಳಯದ ನಂತರ ಇನ್ನೊಂದು ಸೃಷ್ಟಿ; ಸೃಷ್ಟಿಯ ನಂತರ ಪ್ರಳಯ-ಇದು ನಿರಂತರ. ಆದ್ದರಿಂದ ಪ್ರಪಂಚ ಅವ್ಯಯ; ಜೀವ ಅನಾದಿ ಅನಂತ; ಹುಟ್ಟು ಸಾವು ನಿರಂತರ. ಜೀವ-ಜಡಗಳ ಸಮಾಗಮ ಜನನ; ಅದರ ಬೇರ್ಪಡುವಿಕೆ ಮರಣ. ಇಲ್ಲಿ ಎಲ್ಲವೂ ನಿರಂತರ ಬದಲಾವಣೆಯನ್ನು ಕಾಣುತ್ತದೆ. ಒಟ್ಟಿನಲ್ಲಿ ಈ ಜಗತ್ತು ಅಳಿವಿರದ ಅಶ್ವತ್ಥ.

ಇಲ್ಲಿ "ಈ ಮರದ ಮೂಲ ಮೇಲಿದೆ(ಊರ್ಧ್ವಮೂಲ)" ಎಂದಿದ್ದಾರೆ. ಮೇಲೆ ಅಂದರೆ ಎಲ್ಲಕ್ಕಿಂತ ಹಿರಿದಾದ ಭಗವಂತ. ಈ ಪ್ರಪಂಚ ಅನ್ನುವ ಮರಕ್ಕೆ ಮೂಲ ಆ ಭಗವಂತ. ಪ್ರಪಂಚದ ಮೂಲದಲ್ಲಿ ಎಲ್ಲಕ್ಕಿಂತ ಎತ್ತರದಲ್ಲಿ ತಂದೆ-ತಾಯಿಯಾಗಿ ಲಕ್ಷ್ಮೀ-ನಾರಾಯಣರಿದ್ದಾರೆ. ಜಡಪ್ರಕೃತಿಯಿಂದ ಈ ಮರ ವಿಕಸನವಾಗುತ್ತದೆ. ಭಗವಂತನಿಂದ ಚತುರ್ಮುಖಬ್ರಹ್ಮ(ಮಹತತ್ವ), ವಾಯು, ಗರುಡ-ಶೇಷ-ರುದ್ರರು(ಅಹಂಕಾರ ತತ್ವ), ಇಂದ್ರಾದಿ ದೇವತೆಗಳು, ಅವಾಂತರ ದೇವತೆಗಳು, ಗಂಧರ್ವರು, ಮನುಷ್ಯರು, ಪ್ರಾಣಿಗಳು, ಪಕ್ಷಿಗಳು, ಹೀಗೆ ಒಂದರ ನಂತರ ಒಂದು ಶಾಖೆಗಳು ಸೃಷ್ಟಿಯಾದವು. ಇವೆಲ್ಲವೂ ಸೇರಿ ಒಂದು ಮರವಾಯಿತು. ಇಲ್ಲಿ 'ಅಧಃ ಶಾಖಮ್' ಅಂದರೆ ಮೇಲಿನಿಂದ ಕೆಳಕ್ಕೆ ಬೆಳೆಯುವುದು. ಇದು ದೇವತಾ ತಾರತಮ್ಯವನ್ನು ಸೂಚಿಸುತ್ತದೆ.

ಮರದ ಟೊಂಗೆ-ಟಿಸಿಲಿನ ನಂತರ ಅದರ ಎಲೆಗಳು. "ಈ ಮರದ ಎಲೆಗಳೇ ವೇದಗಳು" ಎನ್ನುತ್ತಾನೆ ಕೃಷ್ಣ. ನಮಗೆ ತಿಳಿದಂತೆ ಪ್ರಪಂಚಕ್ಕೆ ಎರಡು ಮುಖ. ಒಂದು ನಾಮಾತ್ಮಕ ಪ್ರಪಂಚ, ಇನ್ನೊಂದು ರೂಪಾತ್ಮಕ ಪ್ರಪಂಚ. ಇಲ್ಲಿ ರೂಪಾತ್ಮಕ ಪ್ರಪಂಚ ಟೊಂಗೆ-ಟಿಸಿಲುಗಳಾದರೆ, ನಾಮಾತ್ಮಕ ಪ್ರಪಂಚ ಮರದ ಎಲೆ. ಮೊಟ್ಟ ಮೊದಲು ನಾಮಾತ್ಮಕ ಪ್ರಪಂಚದಲ್ಲಿ ಸೃಷ್ಟಿಯಾದದ್ದು ವೇದಗಳು. ವಸ್ತುವಿಗೆ ಒಂದು ಹೆಸರು ಕೊಟ್ಟಿರುವುದು ಈ ವೇದದಲ್ಲಿರುವ ವೈದಿಕ ಶಬ್ದಗಳು.

ಸರ್ವೇಷಾಂ ತ ಸ ನಾಮಾನಿ ಕರ್ಮಾಣಿ ಚ ಪೃಥಕ್ ಪೃಥಕ್
ವೇದಶಬ್ದೇಭ್ಯ ಏವಾದೌ ಪೃಥಕ್ ಸಂಸ್ಥಾಶ್ಚ ನಿರ್ಮಮೇ ॥ಮನುಸ್ಮೃತಿ ೧-೨೧॥

ವೇದದಲ್ಲಿ ಏನು ಶಬ್ದಗಳಿವಿಯೋ ಅವು ಮೂಲತಃ ಭಗವಂತನ ನಾಮಗಳು. ಅದನ್ನೇ ಲೋಕಕ್ಕೆ ಬಳಸಿದರು. ಈ ರೀತಿ ಶಬ್ದಗಳ ಸೃಷ್ಟಿಯಾಯಿತು. ಅದೇ ಛಂದಸ್ಸು. ವೇದ ಮಂತ್ರಗಳು-ವೇದವಾಙ್ಮಯಗಳೇ ಈ ಮರದ ಎಲೆಗಳು.

ಏಕೆ ವೇದವನ್ನು ಇಲ್ಲಿ ಎಲೆಗೆ ಹೋಲಿಸಿದರು ಎಂದರೆ, ಒಂದು ಮರ ಹೂ-ಹಣ್ಣು ಕೊಡಬೇಕಾದರೆ ಅಲ್ಲಿ ಫಲಪ್ರದತ್ವ ಇರುವುದು ಎಲೆಗೆ. ಹಾಗೇ ನಮಗೆ ಅಧ್ಯಾತ್ಮ ಸಾಧನೆಯ ಫಲವನ್ನು ಕೊಡತಕ್ಕವು ವೇದಗಳು. ಈ ಕಾರಣಕ್ಕಾಗಿ ಮರವನ್ನು ವಿಶ್ವಕ್ಕೆ ಹೋಲಿಸಿದರೆ, ಮರದ ಎಲೆಯನ್ನು ವೇದಗಳಿಗೆ ಹೋಲಿಸಿದ ಕೃಷ್ಣ. ಪ್ರಳಯಕಾಲದಲ್ಲಿ ಮರ ನಾಶವಾಗುತ್ತದೆ. ಆದರೆ ಮರದ ಎಲೆ ನಾಶವಾಗುವುದಿಲ್ಲ. ಆದ್ದರಿಂದ 'ಪ್ರಳಯ ಕಾಲದಲ್ಲಿ ಭಗವಂತ ಆಲದ ಎಲೆಯ ಮೇಲೆ ಮಲಗಿರುತ್ತಾನೆ'-ಎನ್ನುತ್ತಾರೆ. ವೇದ ನಿತ್ಯ ಅದಕ್ಕೆ ನಾಶವಿಲ್ಲ. ಎಲೆಯ ಮೇಲೆ ಭಗವಂತ ಮಲಗಿದ ಎಂದರೆ ವೇದ ವಾಚ್ಯನಾಗಿ ಮಲಗಿದ ಎಂದರ್ಥ. ಪ್ರಳಯಕಾಲದಲ್ಲಿ ವೇದಗಳಿದ್ದವು ಎನ್ನುವುದು ಇದರಿಂದ ತಿಳಿಯುತ್ತದೆ. ಇಲ್ಲಿ ನಮಗೆ ಒಂದು ಪ್ರಶ್ನೆ ಬರಬಹುದು. ಯಾವ ವಸ್ತುವೂ ಇಲ್ಲದೇ ಇದ್ದಾಗ ವೇದಗಳಿದ್ದವು ಅಂದರೆ ಏನು ಅರ್ಥ? ಅಗ್ನಿಮೀಳೇ ಪುರೋಹಿತಂ... ಎನ್ನುವಲ್ಲಿ ಅಗ್ನಿಯೂ ಇಲ್ಲ,

ಪುರೋಹಿತನೂ ಇಲ್ಲ. ಹೀಗಿರುವಾಗ ಯಾರು ವೇದವನ್ನು ಹೇಳುವವರು ಮತ್ತು ವೇದಗಳು ಪ್ರಳಯ ಕಾಲದಲ್ಲಿ ಯಾರನ್ನು ಹೇಳುತ್ತವೆ ?

ಪ್ರಳಯ ಕಾಲದಲ್ಲಿ ವೇದಗಳಿಗೆ ಭಗವಂತನೊಬ್ಬನೇ ಅರ್ಥ. ಇನ್ಯಾವ ಅರ್ಥವೂ ಇಲ್ಲ. ಹಾಗಾಗಿ ವೇದದಲ್ಲಿನ ಸರ್ವ ಶಬ್ದವೂ ಭಗವಂತನನ್ನು ಹೇಳುತ್ತವೆ. "ನಾಮಾನಿ ಸರ್ವಾಣಿ ಯಮಾ ವಿಷಂತಿ ತಮ್ ವೈ ವಿಷ್ಣುಂ ಪರಮ ಉದಾಹರಂತಿ"- ಯಾರಲ್ಲಿ ಎಲ್ಲಾ ಶಬ್ದಗಳು ಪ್ರವೇಶ ಮಾಡುತ್ತವೋ-ಅವನು ವಿಷ್ಣು. ಆತ ಸರ್ವ ಶಬ್ದವಾಚ್ಯ. ವಿಷ್ಣು ಅಂದರೆ "ವಿಷಂತಿ ಸರ್ವಾಣಿ ನಾಮಾನಿ ಅತ್ರ". ಐತರೇಯ ಅರಣ್ಯಕದಲ್ಲಿ ಹೇಳುವಂತೆ: "ಸರ್ವೇ ಘೋಷಾಃ ಸರ್ವೇ ವೇದಾಃ ಸರ್ವಾಃ ರಚಃ ಎಕೈವ ವ್ಯಾಹೃತಿಃ..." ಪ್ರಕೃತಿಯಲ್ಲಿನ ಸರ್ವಶಬ್ದಗಳು, ಸರ್ವ ನಾದಗಳು ಭಗವಂತನನ್ನು ಹೇಳುತ್ತವೆ. ಹೀಗಾಗಿ ಪ್ರಳಯ ಕಾಲದಲ್ಲಿ ವೇದಾಭಿಮಾನಿನಿ ಲಕ್ಷ್ಮಿ ವೇದವನ್ನು ಹಾಡುತ್ತಿರುತ್ತಾಳೆ(ಶ್ರುತಿಗೀತ) ಮತ್ತು ಭಗವಂತ ಕೇಳುತ್ತಿರುತ್ತಾನೆ. ಇದು ನಾಮಾತ್ಮಕ ಪ್ರಪಂಚದ ಪರಿಕಲ್ಪನೆ. ಕೃಷ್ಣ ಹೇಳುತ್ತಾನೆ "ಇಲ್ಲಿ ಹೇಳಿದ ವಿಚಾರವನ್ನು ಯಾರು ತಿಳಿಯುತ್ತಾರೋ ಅವರು ಸಮಸ್ತ ವೇದವನ್ನು ತಿಳಿದಂತೆ" ಎಂದು.

ಅಧಶ್ಚೋರ್ಧ್ವಂ ಪ್ರಸೃತಾಸ್ತಸ್ಯ ಶಾಖಾ ಗುಣಪ್ರವೃದ್ಧಾ ವಿಷಯಪ್ರವಾಳಾಃ ।
ಅಧಶ್ಚ ಮೂಲಾನ್ಯನುಸಂತತಾನಿ ಕರ್ಮಾನುಬನ್ಧೀನಿ ಮನುಷ್ಯಲೋಕೇ॥ ೨॥

ಅಧಃ ಚ ಊರ್ಧ್ವಂ ಪ್ರಸೃತಾಃ ತಸ್ಯ ಶಾಖಾಃ ಗುಣ ಪ್ರವೃದ್ಧಾಃ ವಿಷಯ ಪ್ರವಾಳಾಃ ।
ಅಧಃ ಚ ಮೂಲಾನಿ ಅನುಸಂತತಾನಿ ಕರ್ಮ ಅನುಬನ್ಧೀನಿ ಮನುಷ್ಯಲೋಕೇ --ತ್ರಿಗುಣಗಳಿಂದ ಕೊಬ್ಬಿದ ಇದರ ಟೊಂಗೆಗಳು ಕೆಳಗೂ ಮೇಲೂ ಹಬ್ಬಿ ಹರಡಿವೆ. ಇಂದ್ರಿಯ ವಿಷಯಗಳೇ ಇವುಗಳ ತಳಿರುಗಳು. ಇದರ ಬುಡಕಟ್ಟುಗಳು ಜೀವಿಗಳ ಕರ್ಮಕ್ಕೆ ತಕ್ಕಂತೆ ಕೆಳಗೆ ಕೂಡಾ, ಭೂಮಿಯಲ್ಲೂ ಹರವಿಕೊಂಡಿವೆ.

ಮರದ ವರ್ಣನೆಯನ್ನು ಇಲ್ಲಿ ಮತ್ತಷ್ಟು ವಿವರಿಸಲಾಗಿದೆ. ಈ ಮರದ ಬೇರುಗಳು ಕೆಳಮುಖವಾಗಿಯೂ, ಮೇಲ್ಮುಖವಾಗಿಯೂ ಹರಡಿಕೊಂಡಿದೆ ಎನ್ನುವಲ್ಲಿ ಆಲದ ಮರದ ವರ್ಣನೆ ಎದ್ದು ಕಾಣುತ್ತದೆ. ಪಂಚಭೂತ ಎನ್ನುವ ಟೊಂಗೆ ಟಿಸಿಲು ಮೇಲಿನಿಂದ ಕೆಳಗಿನ ತನಕ ವ್ಯಾಪಿಸಿಕೊಂಡಿದೆ. ನಮ್ಮ ಶರೀರವನ್ನೇ ನೋಡಿದಾಗ- ನಮ್ಮ ಸಹಸ್ರಾರದಲ್ಲಿ ಭಗವಂತ ಕೂತಿದ್ದಾನೆ. ಮೇಲಿನಿಂದ ಕೆಳಗಿನ ತನಕ ಪಂಚಭೂತಗಳು, ಸತ್ವ-ರಜಸ್ಸು- ತಮಸ್ಸು ಎನ್ನುವ ತ್ರಿಗುಣಗಳು ಟೊಂಗೆಗಳಾಗಿ ನಿಂತಿವೆ. ಇಲ್ಲಿ ಶಬ್ದ, ಸ್ಪರ್ಶ, ರೂಪ, ರಸ, ಗಂಧ ಚಿಗುರೆಲೆಗಳಿದ್ದಂತೆ. ಅಂದರೆ ಪಂಚಭೂತಾತ್ಮಕವಾದ ವಿಷಯಗಳೇ ಈ ಮರದ ಚಿಗುರು. ಈ ಚಿಗುರು ನಮಗೆ ಯಾವಾಗಲೂ ಆಕರ್ಷಣೆ. ಭಗವಂತನ ಅನಂತ ರೂಪ ಮೇಲಿನಿಂದ ಕೆಳಗಿನ ತನಕ ನಮ್ಮ ಅಂಗಾಂಗಗಳಲ್ಲಿ ತುಂಬಿದೆ. ಅಲ್ಲಿ ನಮ್ಮ ಕರ್ಮವನ್ನು ಅವಲಂಬಿಸಿ ಅವನ ಕ್ರಿಯೆ. ಭಗವಂತನ ಮೂಲ ಮೇಲೆ, ಆದರೆ ಆತ ಮೇಲಿನಿಂದ ಕೆಳಗಿನ ತನಕ ಹರವಿಕೊಂಡಿದ್ದಾನೆ. ಹೀಗೆ ಆತ ಎಲ್ಲಾ ಕಡೆ ವ್ಯಾಪಿಸಿ ನಿಂತಿದ್ದಾನೆ.

ನ ರೂಪಮಸ್ಯೇಹ ತಥೋಪಲಭ್ಯತೇ ನಾಂತೋ ನಚಾಽದಿರ್ನ ಚ ಸಂಪ್ರತಿಷ್ಠಾ ।
ಅಶ್ವತ್ಥಮೇನಂ ಸುವಿರೂಢಮೂಲಂ ಅಸಂಗಶಸ್ತ್ರೇಣ ದೃಢೇನ ಛಿತ್ತ್ವಾ ॥೩॥

ತತಃ ಪದಂ ತತ್ ಪರಿಮಾರ್ಗಿತವ್ಯಂ ಯಸ್ಮಿನ್ ಗತಾ ನ ನಿವರ್ತಂತಿ ಭೂಯಃ ।
ತಮೇವ ಚಾಽದ್ಯಂ ಪುರುಷಂ ಪ್ರಪದ್ಯೇ ಯತಃ ಪ್ರವೃತ್ತಿಃ ಪ್ರಸೃತಾ ಪುರಾಣೀ ॥೪॥

ನ ರೂಪಮ್ ಅಸ್ಯ ಇಹ ತಥಾ ಉಪಲಭ್ಯತೇ ನ ಅಂತಃ ನ ಚ ಆದಿಃ ನ ಚ ಸಂಪ್ರತಿಷ್ಠಾ ।
ಅಶ್ವತ್ಥಮ್ ಏನಮ್ ಸು ವಿರೂಢ ಮೂಲಮ್ ಅಸಂಗಶಸ್ತ್ರೇಣ ದೃಢೇನ ಛಿತ್ತ್ವಾ ॥
ತತಃ ಪದಂ ತತ್ ಪರಿಮಾರ್ಗಿತವ್ಯಮ್ ಯಸ್ಮಿನ್ ಗತಾಃ ನ ನಿವರ್ತಂತಿ ಭೂಯಃ ।
ತಮ್ ಏವ ಚ ಆದ್ಯಮ್ ಪುರುಷಮ್ ಪ್ರಪದ್ಯೇ ಯತಃ ಪ್ರವೃತ್ತಿಃ ಪ್ರಸೃತಾ ಪುರಾಣೀ --ಇದರ ಇರುವು ಇದ್ದ ಹಾಗೆ ಕಾಣಿಸುವುದಿಲ್ಲ. ಇದರ ಕೊನೆ ಕಾಣದು; ಬುಡ ಕಾಣದು; ನೆಲೆ ಕೂಡಾ. ಬಲವಾಗಿ ಬೇರೂರಿದ ಈ ಅರಳಿಯನ್ನು ಅನಾಸಕ್ತಿಯೆಂಬ ಹರಿತವಾದ ಕತ್ತಿಯಿಂದ ತರಿದು, ಅನಂತರ ಆ ಪರತತ್ವವನ್ನು ಅರಸಬೇಕು. ಅವನನ್ನು ಸೇರಿದವರು ಮತ್ತೆ ಮರಳುವುದಿಲ್ಲ. ಅವನಿಂದಲೇ ಈ ಪುರಾತನವಾದ ಪಯಣ ಪ್ರಾರಂಭವಾಯಿತು. ಎಲ್ಲದರ ಮೊದಲಿರುವ ಆ ಪರಮ ಪುರುಷನಿಗೇ ಶರಣಾಗಬೇಕು.

ವಿಶ್ವವನ್ನು ಇಲ್ಲಿ ವಿವರಿಸಿದಷ್ಟು ಸ್ಪಷ್ಟವಾಗಿ ಎಲ್ಲಿಯೂ ವರ್ಣಿಸಿಲ್ಲ. ಇತರೆಡೆ ಸ್ವಲ್ಪ ಸ್ವಲ್ಪ ವಿವರಣೆ ಕಾಣಬಹುದು. ಆದರೆ ಕೃಷ್ಣ ಇಲ್ಲಿ ಪೂರ್ಣ ವಿವರಣೆ ಕೊಟ್ಟ. ಇಷ್ಟು ವಿವರಿಸಿದ ಮೇಲೆ ಕೃಷ್ಣ ಒಂದು ಎಚ್ಚರವನ್ನು ಕೊಡುತ್ತಾನೆ. ಕೃಷ್ಣ ಹೇಳುತ್ತಾನೆ: "ಈ ಪ್ರಪಂಚದಲ್ಲೇ ಇದ್ದು ಪ್ರಪಂಚವನ್ನು ನೋಡಿದರೆ ನಾನು ವರ್ಣಿಸಿದ ಅಖಂಡ ದರ್ಶನ ಸಾಧ್ಯವಿಲ್ಲ" ಎಂದು. ನಮಗೆ ಯಾವ ವಸ್ತುವನ್ನು ಕೂಡಾ ಪರಿಪೂರ್ಣವಾಗಿ ಸಮಗ್ರವಾಗಿ ತಿಳಿದುಕೊಳ್ಳಲು ಆಗುವುದೇ ಇಲ್ಲ. ಏಕೆಂದರೆ ಇಡೀ ವಿಶ್ವವನ್ನು ತಿಳಿಯದೆ ವಿಶ್ವದ ಒಂದು ಚಿಕ್ಕ ಕಣ ಅರ್ಥವಾಗದು. ಸಮುದ್ರದ ತೀರದಲ್ಲಿನ ಒಂದು ಕಪ್ಪೆ ಸಮುದ್ರದ ಆಳ-ಅಗಲ ಮತ್ತು ಸಮುದ್ರದ ಅಗಾಧತೆಯನ್ನು ಹೇಗೆ ತಿಳಿಯಲಾರದೋ, ಹಾಗೇ ನಾವು ಈ ಪ್ರಪಂಚವನ್ನು ಪೂರ್ಣ ತಿಳಿಯಲು ಸಾಧ್ಯವಿಲ್ಲ.
ಈ ಪ್ರಪಂಚ ಹೇಗೆ ಸೃಷ್ಟಿಯಾಯಿತು? ಅದು ಪ್ರಳಯ ಕಾಲದಲ್ಲಿ ನಾಶವಾಗಿ ಎಲ್ಲಿಗೆ ಹೋಗುತ್ತದೆ? ಈ ಆಕಾಶದಲ್ಲಿ ಎಲ್ಲಾ ಗ್ರಹ ಗೋಲಗಳು ನಿರಾಧಾರವಾಗಿ ಹೇಗೆ ನಿಂತಿವೆ? ನಾವು ಈ ರೀತಿ ಪ್ರಶ್ನೆ ಹಾಕುತ್ತಾ ಹೋದರೆ ಇದಕ್ಕೆ ನಮ್ಮಲ್ಲಿ ಉತ್ತರವಿಲ್ಲ. ವಿಜ್ಞಾನದಲ್ಲಿ ಕೂಡಾ ಈ ಪ್ರಶ್ನೆಗೆ ಸ್ಪಷ್ಟ ಉತ್ತರವಿಲ್ಲ. ಏಕೆಂದರೆ ವಿಜ್ಞಾನ ನಿಂತಿರುವುದು ಕೇವಲ ಕಲ್ಪನೆಯ ಗೋಪುರದ ಮೇಲೆ.
ಋಗ್ವೇದದಲ್ಲಿ ಪ್ರಳಯ ಕಾಲದ ಸ್ಥಿತಿಯನ್ನು ವಿವರಿಸುತ್ತಾ ಹೇಳುತ್ತಾರೆ: "ನಾಸದಾಸೀನ್ನೋಽಸದಾಸೀತ್ತದಾನೀಂ ನಾಸೀದ್ರಜೋ ನೋ ವ್ಯೋಮಾ....||೧೦.೧೨೯-೧|| : ಅಂದರೆ ಕಣ್ಣಿಗೆ ಕಾಣುವಂತಹದ್ದೂ ಇಲ್ಲ; ಕಣ್ಣಿಗೆ ಕಾಣದ್ದೂ ಇಲ್ಲ; ಈ ಲೋಕಗಳೇ ಪ್ರಳಯಕಾಲದಲ್ಲಿ ಇಲ್ಲ ಎಂದು. ಹಾಗಾದರೆ ಏನೂ ಇಲ್ಲದೆ ಈ ಪ್ರಪಂಚ ಸೃಷ್ಟಿಯಾಯಿತೇ? ಛಾಂದೋಗ್ಯ ಉಪನಿಷತ್ತಿನಲ್ಲಿ 'ಏನೂ ಇಲ್ಲದೆ ಎಲ್ಲವೂ ಹುಟ್ಟಿತು' ಅನ್ನುವುದನ್ನು ಖಂಡನೆ ಮಾಡುತ್ತಾ ಹೇಳುತ್ತಾರೆ: " ಕಥಮಸತಃ ಸಜ್ಜಾಯೇತಃ...||೬.೨.೨||" ಎಂದು. ಪ್ರಳಯ ಕಾಲದಲ್ಲಿ ಭಗವಂತ

ಪ್ರಳಯ ಸಮುದ್ರದಲ್ಲಿ ಮಲಗಿರುತ್ತಾನೆ ಎನ್ನುವುದನ್ನು ನಾವೆಲ್ಲರೂ ಕೇಳಿದ್ದೇವೆ. ಈ ಲೋಕವೇ ಇಲ್ಲದಿರುವಾಗ, ಯಾವ ಸಮುದ್ರ? ಯಾವ ನೀರು? ಇದೆಲ್ಲವನ್ನು ಅರ್ಥ ಮಾಡಿಕೊಳ್ಳುವುದು ಹೇಗೆ?

ಸಂಕ್ಷಿಪ್ತವಾಗಿ ಹೇಳಬೇಕೆಂದರೆ: ಪ್ರಳಯ ಕಾಲದಲ್ಲಿ ಎಲ್ಲವೂ ಸಿಡಿದು ಪರಮಾಣುವಿನ ರೂಪವನ್ನು ಪಡೆಯುತ್ತವೆ. ಇದೇ ಪ್ರಳಯ ಸಮುದ್ರ. ಈ ಕಾಲದಲ್ಲಿ ಎಲ್ಲಾ ಜೀವ ಜಾತಗಳು ತಮ್ಮ ಸ್ಥೂಲ ಶರೀರವನ್ನು ಕಳಚಿಕೊಂಡು ಸೂಕ್ಷ್ಮಶರೀರದಲ್ಲಿ ತಮ್ಮ ಇರುವಿನ ಅರಿವೂ ಇಲ್ಲದೆ ಭಗವಂತನ ಒಡಲಿನಲ್ಲಿರುತ್ತವೆ. ಸೃಷ್ಟಿ ಕಾಲದಲ್ಲಿ ಹಂತ ಹಂತವಾಗಿ ಈ ಪ್ರಪಂಚ ರೂಪುಗೊಳ್ಳುತ್ತದೆ. ಇದೆಲ್ಲವನ್ನು ಮಾಡುವವ ಆ ಭಗವಂತ. ಇಂತಹ ಪ್ರಪಂಚ ತಲೆ-ಬುಡ-ನಡು ಯಾವುದೂ ತಿಳಿಯದಷ್ಟು ಆಳವಾಗಿದೆ. ಇದಕ್ಕಾಗಿ ನಾವು ಯಾವುದನ್ನು ತಿಳಿದರೆ ಎಲ್ಲವನ್ನು ತಿಳಿಯಬಹುದೋ ಅದನ್ನು ಮೊದಲು ತಿಳಿಯಬೇಕು. ಛಾಂದೋಗ್ಯ ಉಪನಿಷತ್ತಿನಲ್ಲಿ ಉದ್ದಾಲಕ ಗುರುಕುಲದಲ್ಲಿ ಹನ್ನೆರಡು ವರ್ಷ ವಿದ್ಯಾಭ್ಯಾಸ ಮುಗಿಸಿಕೊಂಡು ಬಂದು, ತನ್ನೆದುರು ಅಹಂಕಾರದಿಂದ ಸೆಟೆದು ನಿಂತ ಮಗ ಶ್ವೇತಕೇತುವನ್ನು ಉದ್ದೇಶಿಸಿ ಕೇಳುತ್ತಾನೆ: "ಉತ ತಂ ಆದೇಷ್ಯಂ ಅಪ್ರಾಕ್ಷ್ಯ; ಏನಾಶ್ರುತಂ ಶ್ರುತಂ ಭವತಿ, ಅಮತಂ ಮತಂ ಅವಿಜ್ಞಾತಂ ವಿಜ್ಞಾತಂ..||೬.೧.೩||" "ಯಾವುದನ್ನು ತಿಳಿದರೆ ಎಲ್ಲವೂ ತಿಳಿಯುತ್ತದೋ, ಅದು ತಿಳಿಯಿತೇ?" ಎಂದು. ಇಲ್ಲಿ ಕೃಷ್ಣ ಹೇಳುತ್ತಾನೆ: "ಯಾವುದನ್ನು ತಿಳಿದರೆ ಎಲ್ಲವೂ ತಿಳಿಯುತ್ತದೋ ಅದನ್ನು ತಿಳಿವುದಕ್ಕೋಸ್ಕರ ಆ ಪರಶಕ್ತಿಯಲ್ಲಿ ಶರಣಾಗು" ಎಂದು. ಉಪನಿಷತ್ತೂ ಕೂಡಾ ಇದನ್ನೇ ಹೇಳುತ್ತದೆ: "ಯಸ್ಮಿನ್ ವಿಜ್ಞಾತೇ ಸರ್ವಮಿದಂ ವಿಜ್ಞಾತಂ ಭವತಿ . ||ಶಾಂಡಿಲ್ಯ-೨.೨; ಮುಂಡಕ ೧.೧.೩||".

ಭಗವಂತನನ್ನು ತಿಳಿದರೆ ಎಲ್ಲವನ್ನು ತಿಳಿದಂತೆ ಎನ್ನುವುದೇನೋ ಸರಿ, ಆದರೆ ಅವನನ್ನು ಅರಿಯುವ ಪರಿ ಯಾವುದು? ಈ ಅಖಂಡವಾಗಿ ಬೇರೂರಿರುವ ಮರದ ಮೂಲವನ್ನು ಸೇರುವುದು ಹೇಗೆ? ಇದಕ್ಕೆ ಕೃಷ್ಣ ಹೇಳುತ್ತಾನೆ: "ಜ್ಞಾನವೆಂಬ ಕತ್ತಿಯನ್ನು, ಅನಾಸಕ್ತಿ(**detachment**) ಮತ್ತು ಉಪಾಸನೆ ಎನ್ನುವ ಸಾಣೆಯ ಕಲ್ಲಿನಲ್ಲಿ ಹರಿತಗೊಳಿಸಿ, ಆಳವಾಗಿ ಬೇರೂರಿರುವ ಮರವನ್ನು ತರಿದು, ಪರತತ್ವವನ್ನು ಹುಡುಕು" ಎಂದು. ನಾವು ಎಲ್ಲಿಗೆ ಹೋದರೆ ಮರಳಿ ಇಲ್ಲಿಗೆ ಬರುವುದು ಬೇಡವೋ, ಅದನ್ನು ಅನ್ವೇಷಣೆ ಮಾಡಬೇಕು. ಭಗವಂತನ ಇತಿಮಿತಿರಾಹಿತ್ಯವನ್ನು ಅರಿಯುವ ಜ್ಞಾನವೇ ಇದಕ್ಕೆ ಕೊಡಲಿ. ಇಲ್ಲಿಯೂ ಕೂಡಾ ನಾವೇ ನಮ್ಮ ಪ್ರಯತ್ನದಿಂದ ಮೂಲವನ್ನು ಸೇರಲು ಸಾಧ್ಯವಿಲ್ಲ. ಆ ಶಕ್ತಿ ನಮಗಿಲ್ಲ. ಅದಕ್ಕಾಗಿ ಇರುವ ಒಂದೇ ಮಾರ್ಗ ಆ ಪರಶಕ್ತಿಯಲ್ಲಿ ಶರಣಾಗುವುದು. ಆತನ ಅನುಗ್ರಹದಿಂದ ಮಾತ್ರ ನಾವು ಆ ಪುರುಷೋತ್ತಮನನ್ನು ಸೇರಬಹುದು.

ನಿರ್ಮಾನಮೋಹಾ ಜಿತಸಂಗದೋಷಾ ಅಧ್ಯಾತ್ಮನಿತ್ಯಾ ವಿನಿವೃತ್ತಕಾಮಾಃ ।
ದ್ವಂದ್ವೈರ್ವಿಮುಕ್ತಾಃ ಸುಖದುಃಖಸಂಜ್ಞೈರ್ಗಚ್ಛನ್ತ್ಯಮೂಢಾಃ ಪದಮವ್ಯಯಂ ತತ್ ॥೫॥

ನಿರ್ಮಾನಮೋಹಾಃ ಜಿತ ಸಂಗ ದೋಷಾಃ ಅಧ್ಯಾತ್ಮ ನಿತ್ಯಾಃ ವಿನಿವೃತ್ತಕಾಮಾಃ ।
ದ್ವಂದ್ವೈಃ ವಿಮುಕ್ತಾಃ ಸುಖ ದುಃಖ ಸಂಜ್ಞೈಃ ಗಚ್ಛಂತಿ ಅಮೂಢಾಃ ಪದಮ್ ಅವ್ಯಯಮ್ ತತ್–ಬಿಂಕವಿರದವರು, ಮೋಹವಳಿದವರು, ಬಯಕೆಗಳನ್ನು ಬಿಟ್ಟವರು, ಸುಖ-ದುಃಖಗಳೆಂಬ ಇಕ್ಕಟ್ಟಿನ ಇರುಕನ್ನು ಮೀರಿ ನಿಂತವರು- ಇಂತಹ ಜಾಣರು ಈ ಅಳಿವಿರದ ತಾಣವನ್ನು ಸೇರುತ್ತಾರೆ.

ಕೃಷ್ಣ ಈ ಶ್ಲೋಕದಲ್ಲಿ ಹೇಳಿರುವ ವಿಚಾರ ಈ ಹಿಂದಿನ ಅನೇಕ ಅಧ್ಯಾಯಗಳಲ್ಲಿ ಅಲ್ಲಲ್ಲಿ ಬಂದಿದೆ ಮತ್ತು ಬಂದಾಗ ನಾವು ಆ ಬಗ್ಗೆ ವಿಶೇಷವಾಗಿ ವಿಶ್ಲೇಷಣೆ ಮಾಡಿದ್ದೇವೆ. ಎಲ್ಲವನ್ನು ಸಮಷ್ಟಿಯಾಗಿ ಇಲ್ಲಿ ಕೃಷ್ಣ ಹೇಳಿದ್ದಾನೆ. ಭಗವಂತನಲ್ಲಿ ಶರಣಾಗತಿ ಬೇಡಿ ಸಾಗುವ ನಮ್ಮ ಜೀವನದ ನಡೆ ಹೇಗಿರಬೇಕು ಎನ್ನುವುದನ್ನು ಈ ಶ್ಲೋಕದಲ್ಲಿ ವಿವರಿಸಲಾಗಿದೆ. "ಎಲ್ಲಕ್ಕಿಂತ ಮೊದಲು ಮಾನ-ಮೋಹವನ್ನು ಬಿಡಬೇಕು" ಎನ್ನುತ್ತಾನೆ ಕೃಷ್ಣ. ಅಂದರೆ 'ನಾನು' ಎನ್ನುವ 'ಅಹಂಕಾರ' ಮತ್ತು 'ನನ್ನದು' ಎನ್ನುವ 'ಮಮಕಾರ' ಇವೆರಡನ್ನು ನಾವು ಮೊದಲು ತೊರೆಯಬೇಕು. ಈ ಪ್ರಪಂಚಕ್ಕೆ ಬರುವಾಗಲೂ ನಾವು ಬತ್ತಲೆ, ಹೋಗುವಾಗಲೂ ಬತ್ತಲೆ. ಹೀಗಿರುವಾಗ ಇಲ್ಲಿ 'ನಾನು', 'ನನ್ನದು' ಎಂದು ಅಹಂಕಾರ-ಮಮಕಾರದಲ್ಲಿ ಬೀಳುವುದರಲ್ಲಿ ಯಾವುದೇ ಅರ್ಥವಿಲ್ಲ. ಸಂಗದೋಷ ನಮ್ಮ ಮೇಲೆ ಅನೇಕ ಕೆಟ್ಟ ಪರಿಣಾಮವನ್ನು ಬೀರುತ್ತದೆ. ಅದಕ್ಕಾಗಿ ನಾವು ಸಂಗದೋಷವನ್ನು ಗೆಲ್ಲಬೇಕು. ಒಂದು ವಸ್ತುವಿನ ಅತಿಯಾದ ಒಡನಾಟ, ಅದರ ಮೇಲಿನ ಅತಿಯಾದ ಮಮಕಾರ ಎಂದೆಂದಿಗೂ ಒಳ್ಳೆಯದಲ್ಲ. ಈ ರೀತಿ ನಿರ್ಲಿಪ್ತತೆಯಿಂದ ಬದುಕಬೇಕಾದರೆ ಮೊದಲು ನಮ್ಮನ್ನು ನಾವು ಅಧ್ಯಾತ್ಮ ಚಿಂತನೆಯಲ್ಲಿ ತೊಡಗಿಸಿಕೊಳ್ಳಬೇಕು. ಬಯಕೆಗಳನ್ನು ಬಿಟ್ಟು, ಸುಖ ಬಂದಾಗ ಹಾರಾಡದೇ, ದುಃಖ ಬಂದಾಗ ಕುಗ್ಗದೇ, ದ್ವಂದ್ವಾತೀತರಾಗಿ ಬದುಕುವುದನ್ನು ನಾವು ಕಲಿಯಬೇಕು. ಸೋಲೇ ಗೆಲುವಿನ ಮೆಟ್ಟಿಲು, ದುಃಖ-ಸುಖದ ಮೆಟ್ಟಿಲು. ಹಗಲು-ರಾತ್ರಿಯನ್ನು ಸ್ವೀಕರಿಸಿದಂತೆ ಕಷ್ಟ-ಸುಖವನ್ನು ನಾವು ಸಮನಾಗಿ ಸ್ವೀಕರಿಸಬೇಕು. ಲೌಕಿಕ ನಿರೀಕ್ಷೆ-ನಿರಾಶೆಯ ಮೂಲ. ಇದರ ಹಿಂದೆ ಹೋದವರು ತಿಳಿಗೇಡಿಗಳು. ಅವರು ತಾವೇ ತಾವಾಗಿ ತಮ್ಮ ಜೀವನದಲ್ಲಿ ಸಮಸ್ಯೆಯನ್ನು ತಂದುಕೊಳ್ಳುತ್ತಾರೆ. ಆದರೆ ಈ ಮರ್ಮವನ್ನು ಅರಿತ ಜ್ಞಾನಿಗಳು ಭಗವಂತನ ಲೋಕವನ್ನು ನಿರಾಯಾಸವಾಗಿ ಸೇರುತ್ತಾರೆ-ಇದು ನಿಶ್ಚಿತ.

ದೇವರ ಬಗ್ಗೆ ದೇವರನ್ನು ನಂಬುವವರಲ್ಲೇ ಅನೇಕ ಅಭಿಪ್ರಾಯ ಭೇದಗಳಿವೆ. ಪ್ರತಿಯೊಬ್ಬರಿಗೂ ತಮ್ಮ ವಿಚಾರಧಾರೆಯೇ ಸರಿ ಎನ್ನುವ ಭಾವನೆ ಇರುತ್ತದೆ. ಇದಕ್ಕಾಗಿ ಮುಂದಿನ ಶ್ಲೋಕಗಳಲ್ಲಿ ಕೃಷ್ಣ ಈ ಕುರಿತ ವಿವರಣೆಯನ್ನು ಕೊಡುತ್ತಾನೆ. ಇಲ್ಲಿ ಪ್ರಸ್ತುತವಿರುವ ಶ್ಲೋಕಗಳಲ್ಲಿ ಇರುವ ವಿಚಾರ ನಮಗೆ ಸ್ವಲ್ಪ ಅಸ್ಪಷ್ಟವಾಗಿ ಕಾಣಬಹುದು. ನಮ್ಮ ಸಾಧನೆ ಮತ್ತು ನಮ್ಮ ಯೋಗ್ಯತೆಗನುಗುಣವಾಗಿ ಈ ಶ್ಲೋಕಗಳು ತೆರೆದುಕೊಳ್ಳುತ್ತವೆ. ಇಲ್ಲಿ ಕೃಷ್ಣ ಜೀವ-ಜಗತ್ತು-ಭಗವಂತ ಈ ತ್ರಿಪುಟಿಗಳ ಕಲ್ಪನೆಯನ್ನು ಬಹಳ ರೋಚಕವಾಗಿ ವಿವರಿಸಿದ್ದಾನೆ.

ಭಗವಂತನ ಚಿಂತನೆಯಲ್ಲಿ ಕಾಳಜಿ ಇರುವವರಿಗೆ ಈ ಅಧ್ಯಾಯದ ಮುಂದಿನ ಭಾಗ ಬಹಳ ಮುಖ್ಯವಾಗುತ್ತದೆ. ನಮ್ಮ ಜೀವನದಲ್ಲಿ ನಾವು ಹೇಗೆ ಸಾಧನೆ ಮಾಡಬೇಕು, ಹೇಗೆ ಭಗವಂತನ ಚಿಂತನೆ ಮಾಡಬೇಕು ಅನ್ನುವುದರ ಸಮಸ್ತ ಸಾರವನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ.

ನ ತದ್ ಭಾಸಯತೇ ಸೂರ್ಯೋ ನ ಶಶಾಂಕೋ ನ ಪಾವಕಃ ।
ಯದ್ ಗತ್ವಾ ನ ನಿವರ್ತಂತೇ ತದ್ ಧಾಮ ಪರಮಂ ಮಮ ॥೬॥

ನ ತತ್ ಭಾಸಯತೇ ಸೂರ್ಯಃ ನ ಶಶಾಂಕಃ ನ ಪಾವಕಃ ।
ಯತ್ ಗತ್ವಾ ನ ನಿವರ್ತಂತೇ ತತ್ ಧಾಮ ಪರಮಮ್ ಮಮ–ಅದನ್ನು ಸೂರ್ಯ ಬೆಳಗಿಸಲಾರ; ಚಂದ್ರ ಬೆಳಗಿಸಲಾರ; ಬೆಂಕಿ ಕೂಡಾ. ಅದರತ್ತ ತೆರಳಿದವರು ಮತ್ತೆ ಮರಳುವುದಿಲ್ಲ. ಅದು ನನ್ನ ಹಿರಿಯ ರೂಪ.

ಇದೇ ರೀತಿಯ ವಿವರಣೆ ಕಠೋಪನಿಷತ್ತಿನಲ್ಲಿ ಬಂದಿದೆ. ಅದರ ಸಾರವನ್ನು ಕೃಷ್ಣ ಇಲ್ಲಿ ಹೇಳಿದ್ದಾನೆ. ಕಠೋಪನಿಷತ್ತಿನಲ್ಲಿ ಹೇಳುವಂತೆ:

ನ ತತ್ರ ಸೂರ್ಯೋ ಭಾತಿ ನ ಚಂದ್ರತಾರಕಂ ನೇಮಾ ವಿದ್ಯುತೋ ಭಾಂತಿ ಕುತೋಽಯಮಗ್ನಿಃ .
ತಮೇವ ಭಾಂತಮನುಭಾತಿ ಸರ್ವಂ ತಸ್ಯ ಭಾಸಾ ಸರ್ವಮಿದಂ ವಿಭಾತಿ ||೧೫||

"ಭಗವಂತನನ್ನು ಸೂರ್ಯ ಬೆಳಗಿಸುವುದಿಲ್ಲ, ಬೆಳದಿಂಗಳಾಗಲೀ, ಅಗ್ನಿಯ ಬೆಳಕಾಗಲೀ ಆತನನ್ನು ಬೆಳಗಿಸಲಾರದು" ಎನ್ನುತ್ತಾನೆ ಕೃಷ್ಣ. ಇಲ್ಲಿ ನಾವು ಉಪಾಸನೆ ಮಾಡುವ ಭಗವಂತನ ಪ್ರತೀಕವನ್ನು ಕೃಷ್ಣ ಉದಾಹರಣೆಯಾಗಿ ತೆಗೆದುಕೊಂಡಿದ್ದಾನೆ. ನಾವು ಸೂರ್ಯನಲ್ಲಿ ಗಾಯತ್ರಿಯನ್ನು ಉಪಾಸನೆ ಮಾಡುತ್ತೇವೆ; ಚಂದ್ರಮಂಡಲ ಮಧ್ಯಸ್ಥನಾಗಿ ಭಗವಂತನನ್ನು ಧನ್ವಂತರಿಯಲ್ಲಿ ಪೂಜಿಸುತ್ತೇವೆ; ಭೂಲೋಕದಲ್ಲಿ ಭಗವಂತನ ಆರಾಧನೆ ಅಗ್ನಿ ಮುಖದಲ್ಲಿ. ಇಲ್ಲಿ ಕೃಷ್ಣ ಕೊಡುತ್ತಿರುವ ಎಚ್ಚರ ಏನೆಂದರೆ –ಇವೆಲ್ಲವೂ ಬೆಳಕಿನ ಪ್ರತೀಕ ಮಾತ್ರ. ಇವು ನೇರವಾಗಿ ನಮಗೆ ಭಗವಂತನನ್ನು ತೋರಿಸಲಾರವು. ಭಗವಂತನನ್ನು ಕಾಣಲು ನಾವು ನಮ್ಮೊಳಗಿನ ಸ್ವರೂಪಭೂತವಾದ ಅಂತಃಜ್ಯೋತಿಯನ್ನು ಬಳಸಬೇಕು. ಬೃಹದಾರಣ್ಯಕ ಉಪನಿಷತ್ತಿನಲ್ಲಿ(೬-೦೪) ಜನಕ ಮತ್ತು ಯಾಜ್ಞವಲ್ಕ್ಯರ ನಡುವಿನ ಸಂಭಾಷಣೆಯಲ್ಲಿ ಈ ವಿಷಯವನ್ನು ಸ್ಪಷ್ಟವಾಗಿ ತೆರೆದಿಡಲಾಗಿದೆ:
ಯಾಜ್ಞವಲ್ಕ್ಯ, ಕಿಮ್ ಜ್ಯೋತಿರಯಂಪುರುಷಃ ಇತಿ । ಆದಿತ್ಯ ಜ್ಯೋತಿಃ, ಸಮ್ರಾಡ್,.. ||೪-೨|| -ಇಲ್ಲಿ ಜನಕ ಯಾಜ್ಞವಲ್ಕ್ಯನಲ್ಲಿ ಕೇಳುತ್ತಾನೆ: "ಈ ಪ್ರಪಂಚದಲ್ಲಿ ಜೀವರು ತಮ್ಮ ಕಾರ್ಯ ನಿರ್ವಹಣೆ ಮಾಡಲು ಸಹಾಯಕವಾದ ಬೆಳಕು ಯಾವುದು" ಎಂದು. ಇದಕ್ಕೆ ನೇರವಾಗಿ ಯಾಜ್ಞವಲ್ಕ್ಯ ಉತ್ತರಿಸುತ್ತಾನೆ " ಸೂರ್ಯನ ಪ್ರಕಾಶ" ಎಂದು.
ಅಸ್ತಮಿತ ಆದಿತ್ಯೇ ಯಾಜ್ಞವಲ್ಕ್ಯ, ಕಿಮ್ ಜ್ಯೋತಿರೇವಾಯಂ ಪುರುಷಃ ಇತಿ । ಚಂದ್ರಮೇವಾಸ್ಯ ಜ್ಯೋತಿರ್ ಭವತಿ, ..||೪-೩|| –ಸೂರ್ಯ ಪ್ರಕಾಶ ಇಲ್ಲದೇ ಇದ್ದಾಗ ಜೀವರು ಯಾವ ಬೆಳಕಿನಿಂದ ತಮ್ಮ ಕಾರ್ಯ ನಿರ್ವಹಣೆ ಮಾಡುತ್ತಾರೆ ಎಂದಾಗ-ಯಾಜ್ಞವಲ್ಕ್ಯ ಹೇಳುತ್ತಾನೆ: "ಚಂದ್ರನ ಬೆಳಕಿನಿಂದ" ಎಂದು.
ಅಸ್ತಮಿತ ಆದಿತ್ಯೇ, ಯಾಜ್ಞವಲ್ಕ್ಯ,ಚಂದ್ರಮಸ್ಯಸ್ತಮಿತೇ, ಕಿಮ್ ಜ್ಯೋತಿರೇವಾಯಂ ಪುರುಷ ಇತಿ । ಅಗ್ನಿರ್ ಏವಾಸ್ಯ ಜ್ಯೋತಿರ್ ಭವತಿ, ...||೪-೪||. ಸೂರ್ಯ ಚಂದ್ರ ಇಲ್ಲದಾಗ ಯಾವ ಬೆಳಕು ಎನ್ನುವ ಪ್ರಶ್ನೆಗೆ ಯಾಜ್ಞವಲ್ಕ್ಯ ಉತ್ತರಿಸುತ್ತಾನೆ: "ಬೆಂಕಿಯ ಪ್ರಕಾಶದಿಂದ" ಎಂದು.
ಅಸ್ತಮಿತ ಆದಿತ್ಯೇ, ಯಾಜ್ಞವಲ್ಕ್ಯ,ಚಂದ್ರಮಸಿ ಅಸ್ತಮಿತೇ,ಶಾಂತೇಽಗ್ನೌ ,ಕಿಮ್ ಜ್ಯೋತಿರೇವಾಯಂ ಪುರುಷ ಇತಿ । ವಾಗ್ ಏವಾಸ್ಯ ಜ್ಯೋತಿರ್ ಭವತಿ ವಾಚೈವಾಯಂ ಜ್ಯೋತಿಷಾಸ್ತೇ ಪಲ್ಯಯತೇ ಕರ್ಮ ಕುರುತೇ ವಿಪಲ್ಯಯೇತಿ ತಸ್ಮಾದ್ವೈ ,ಸಮ್ರಾಡ್, ಅಪಿ ಯತ್ರ ಪಾಣಿರ್ನ ವಿನಿರ್ಜ್ಞಾಯತೇ ,ಅಥ ಯತ್ರ ವಾಗುಚ್ಚಾರತಿ ಉಪೈವ ತತ್ರ ನ್ಯೇತೀತಿ । ಏವಮೇವೈತದ್ ಯಾಜ್ಞವಲ್ಕ್ಯ||೪-೫|| -ಒಂದು ವೇಳೆ ಸೂರ್ಯ, ಚಂದ್ರ, ಬೆಂಕಿ,

ನಕ್ಷತ್ರ- ಯಾವುದೇ ಬೆಳಕು ಇಲ್ಲದಾಗ ಜನರು ಹೇಗೆ ವ್ಯವಹರಿಸುತ್ತಾರೆ ಎಂದಾಗ ಯಾಜ್ಞವಲ್ಕ್ಯ ಉತ್ತರಿಸುತ್ತಾನೆ :"ಒಬ್ಬರಿಗೊಬ್ಬರು ಮಾತನಾಡುವ ಮೂಲಕ" ಎಂದು.

ಅಸ್ತಮಿತ ಆದಿತ್ಯೇ ,ಯಾಜ್ಞವಲ್ಕ್ಯ,ಚಂದ್ರಮಸ್ಯಸ್ತಮಿತೇ, ಶಾಂತೇಽಗ್ನೌ ,ಶಾಂತಾಽಯಾಂ ವಾಚಿ, ಕಿಮ್ ಜ್ಯೋತಿರೇವಾಯಂ ಪುರುಷ ಇತಿ । ಆತ್ಮೈವಾಸ್ಯ ಜ್ಯೋತಿರ್ಭವತಿ, ಆತ್ಮನೈವಾಯಂ ಜ್ಯೋತಿಷಾಸ್ತೇ ಪಲ್ಯಯತೇ ಕರ್ಮ ಕುರುತೇ ವಿಪಲ್ಯಯೇತ್ ಇತಿ ||೪-೬|| ಎಲ್ಲಾ ಬೆಳಕೂ ಇಲ್ಲದಾಗ, ಯಾರೂ ಜೊತೆಯಲ್ಲಿ ಇಲ್ಲದಾಗ ಯಾವ ಬೆಳಕು ನಮಗೆ ಶಕ್ತಿ ಎನ್ನುವ ಪ್ರಶ್ನೆಗೆ ಯಾಜ್ಞವಲ್ಕ್ಯ ಉತ್ತರಿಸುತ್ತಾನೆ "ಆತ್ಮ ಜ್ಯೋತಿ" ಎಂದು. ಮೇಲ್ನೋಟಕ್ಕೆ ಈ ಸಂಭಾಷಣೆಯನ್ನು ನೋಡಿದರೆ ನಮಗೆ ಏನೂ ತಿಳಿಯುವುದಿಲ್ಲ. ಆದರೆ ಇದರಲ್ಲಿ ಪ್ರಾಚೀನರು ಅದೆಷ್ಟು ವಿಚಾರವನ್ನು ತುಂಬಿದ್ದಾರೆ. ನಾವು ನಮ್ಮ ಅಂತರಂಗದಲ್ಲಿನ ಆತ್ಮಜ್ಯೋತಿಯ ಪರಿಚಯವಿಲ್ಲದೆ ಕೇವಲ ಹೊರ ಪ್ರಪಂಚದಲ್ಲಿ ಭೌತಿಕ ಬೆಳಕಿನಲ್ಲಿ ಭಗವಂತನನ್ನು ಹುಡುಕುವುದರಿಂದ ಆತ ನಮಗೆ ಸಿಗಲಾರ. ಆತನನ್ನು ಯಾವ ಭೌತಿಕ ಬೆಳಕೂ ಬೆಳಗಲಾರದು. ಆತ ಬೆಳಕುಗಳ ಬೆಳಕು. ಆತನನ್ನು ಕಾಣಲು ನಾವು ನಮ್ಮ ಸ್ವರೂಪದಲ್ಲಿನ ಆತ್ಮಜ್ಯೋತಿಯನ್ನು ಬಳಸಬೇಕು. ಸೂರ್ಯ, ಚಂದ್ರ, ಅಗ್ನಿಯನ್ನು ಭಗವಂತನ ಪ್ರತೀಕವಾಗಿ ಬಳಸಿ ನಮ್ಮ ಅಂತರಂಗದ ಜ್ಯೋತಿಯನ್ನು ನಾವು ಜಾಗೃತಗೊಳಿಸಿಕೊಳ್ಳಬೇಕು.

ಯಾವ ಸ್ಥಾನದಲ್ಲಿ ಭಗವಂತ ಸದಾ ಜ್ಞಾನಿಗಳಿಗೆ ಗೋಚರವಾಗುತ್ತಾನೋ ಅದು "ಪರಮಧಾಮ" ಅದೇ ಮೋಕ್ಷ. ಅಲ್ಲಿ ಸೂರ್ಯನಾಗಲೀ, ಚಂದ್ರನಾಗಲೀ, ಅಗ್ನಿಯಾಗಲೀ ಬೆಳಕಲ್ಲ. ಈ ಪರಮಧಾಮದಿಂದಲೇ ಸೂರ್ಯ, ಚಂದ್ರ, ಅಗ್ನಿ ಬೆಳಕು ಪಡೆಯುವುದು. ಆತ್ಮಜ್ಯೋತಿಯನ್ನು ಗುರುತಿಸಿ, ಆತ್ಮದಲ್ಲಿನ ಪರಮಾತ್ಮನನ್ನು ಕಂಡುಕೊಂಡವ ಎಂದೂ ಮರಳಿಬಾರದ ಈ ಪರಮಧಾಮವನ್ನು ಸೇರುತ್ತಾನೆ.

ಮಮೈವಾಂಶೋ ಜೀವಲೋಕೇ ಜೀವಭೂತಃ ಸನಾತನಃ ।
ಮನಃಷಷ್ಠಾನೀಂದ್ರಿಯಾಣಿ ಪ್ರಕೃತಿಸ್ಥಾನಿ ಕರ್ಷತಿ ॥೭॥

ಶರೀರಂ ಯದವಾಪ್ನೋತಿ ಯಚ್ಚಾಪ್ಯುತ್ ಕ್ರಾಮತೀಶ್ವರಃ ।
ಗೃಹೀತ್ವೈತಾನಿ ಸಂಯಾತಿ ವಾಯುರ್ಗಂಧಾನಿವಾಽಶಯಾತ್॥೮॥

ಮಮ ಏವ ಅಂಶಃ ಜೀವಲೋಕೇ ಜೀವಭೂತಃ ಸನಾತನಃ ।
ಮನಃ ಷಷ್ಠಾನಿ ಇಂದ್ರಿಯಾಣಿ ಪ್ರಕೃತಿ ಸ್ಥಾನಿ ಕರ್ಷತಿ ||
ಶರೀರಮ್ ಯತ್ ಅವಾಪ್ನೋತಿ ಯತ್ ಚ ಅಪಿ ಉತ್ಕ್ರಾಮತಿ ಈಶ್ವರಃ ।
ಗೃಹೀತ್ವಾ ಏತಾನಿ ಸಂಯಾತಿ ವಾಯುಃ ಗಂಧಾನ್ ಇವ ಆಶಯಾತ್ --ಈ ದೇಹದಲ್ಲಿರುವ ಅಳಿವಿರದ ಜೀವನು ನನ್ನದೇ ಒಂದು ತುಣುಕಿನಂತೆ; [ನನ್ನ ಭಿನ್ನಾಂಶ; ನನ್ನ ಪ್ರತಿಬಿಂಬ]. ಅವನು ಶರೀರದಲ್ಲಿರುವ ಐದು ಜ್ಞಾನೇಂದ್ರಿಯಗಳನ್ನು ಆರನೆಯ ಮನಸ್ಸಿನ ಜತೆಗೆ ವಿಷಯಗಳತ್ತ ಹರಿಯಗೊಡುತ್ತಾನೆ. ವಾಸ್ತವವಾಗಿ ಜೀವ ಈ ಶರೀರವನ್ನು ಹೊಕ್ಕಾಗ ಮತ್ತು ಬಿಟ್ಟು ಹೊರಟಾಗ ಸರ್ವಶಕ್ತನಾದ ಭಗವಂತನೇ ಈ ಇಂದ್ರಿಯಗಳನ್ನು ನಿಯಂತ್ರಿಸುತ್ತಾ ಜತೆಗೆ ಬರುತ್ತಾನೆ; ಗಾಳಿ ಹೂವಿನ ಕಂಪನ್ನು ಹೊತ್ತು ಬಂದಂತೆ. [ಭಗವಂತ ಈ ಜೀವದ

ಶರೀರವನ್ನು ಹೊಕ್ಕಾಗ ಮತ್ತು ಹೊರಬಂದಾಗ ಐದು ಜ್ಞಾನೇಂದ್ರಿಯಗಳನ್ನು ಆರನೆಯ ಮನಸ್ಸಿನ ಜತೆಗೆ ತನ್ನಂಕೆಯಲ್ಲಿರಿಸಿಕೊಳ್ಳುತ್ತಾನೆ. ಜೀವನಿಗೆ ವಿಷಯಾನುಭವ ನೀಡುವಾಗ ಇವುಗಳನ್ನು ಜತೆಗೊಯ್ಯುತ್ತಾನೆ.- ಗಾಳಿ ಹೂವಿಂದ ಕಂಪನ್ನು ಜತೆಗೊಯ್ಯುವಂತೆ.]

ಈ ಶ್ಲೋಕ ಭಗವಂತ ಮತ್ತು ಜೀವ ಎರಡನ್ನೂ ವಿವರಿಸುವ ಶ್ಲೋಕ. ಇಲ್ಲಿ ನಮಗೆ ಸ್ವಲ್ಪ ಗೊಂದಲವೆನಿಸುವ ಮಾತನ್ನು ಕೃಷ್ಣ ಹೇಳುತ್ತಾನೆ. ಈ ಮಾತನ್ನು ಬೇರೆ ಬೇರೆ ಮುಖದಲ್ಲಿ ಸ್ಪಷ್ಟವಾಗಿ ತಿಳಿದುಕೊಳ್ಳದೇ ಇದ್ದರೆ ಎಲ್ಲವೂ ಅಸ್ಪಷ್ಟವೆನಿಸುತ್ತದೆ. ಮೇಲ್ನೋಟದಲ್ಲಿ ನೋಡಿದರೆ ಕೃಷ್ಣ ಹೇಳುತ್ತಾನೆ: "ಎಲ್ಲಾ ಜೀವರೂ ನನ್ನದೇ ಅಂಶ" ಎಂದು. ಇಲ್ಲಿ ಅಂಶ ಎನ್ನುವಲ್ಲಿ ಎರಡು ಮುಖವಿದೆ. ಒಂದು ಸ್ವರೂಪಭೂತ ಅಂಶ ಮತ್ತು ಇನ್ನೊಂದು ಭಿನ್ನಾಂಶ. ಭಗವಂತ ಜ್ಞಾನ ಸ್ವರೂಪ, ಈ ಜೀವನೂ ಕೂಡಾ ಜ್ಞಾನ ಸ್ವರೂಪ. ಭಗವಂತ ಮಹಾ ಬೆಳಕಾದರೆ ಜೀವ ಬೆಳಕಿನ ಕಿಡಿ. ಭಗವಂತ ಬಿಂಬವಾದರೆ ಜೀವ ಪ್ರತಿಬಿಂಬ. ಇದು ಸನಾತನ- ಅನಾದಿ ಅನಂತವಾಗಿರುವಂತಹದ್ದು. ಜೀವ ಭಗವಂತನ ಪ್ರತಿಬಿಂಬ ಅಂದರೆ ಅದು ಭಗವಂತನ ಭಿನ್ನಾಂಶ. ಈ ಜೀವನೊಳಗೆ 'ಜೀವನಾಗಿ' ಧಾರಣೆ ಮಾಡಿಕೊಂಡು ಉಸಿರಾಡಿಸುವವ ಬಿಂಬರೂಪಿ ಭಗವಂತ. ಅದು ಭಗವಂತನ ಸ್ವರೂಪಾಂಶ. ಈ ರೀತಿ ಜೀವ ಹೊರಗಿನ ಪಂಚಭೂತವನ್ನು ಅನುಭವಿಸುವ ಐದು ಇಂದ್ರಿಯ, ಮತ್ತು ಈ ಅನುಭವವನ್ನು ಒಳಗಿನ ಜೀವಕ್ಕೆ ಮುಟ್ಟಿಸುವ ಆರನೇ ಮನಸ್ಸಿನೊಂದಿಗೆ, ಬಿಂಬರೂಪಿ ಭಗವಂತನ ಧಾರಣೆಯಲ್ಲಿ, ತಾಯಿಯ ಗರ್ಭದಲ್ಲಿ ರೂಪುಗೊಳ್ಳುತ್ತಿರುವ ಸ್ಥೂಲ ಶರೀರವನ್ನು ಪ್ರವೇಶ ಮಾಡುತ್ತಾನೆ(ಭಗವಂತ ಪ್ರವೇಶ ಮಾಡಿಸುತ್ತಾನೆ). ಹೀಗೆ ಪ್ರವೇಶ ಮಾಡಿದ ಜೀವಕ್ಕೆ ಬಿಂಬರೂಪಿ ಭಗವಂತ ಸರ್ವೇಂದ್ರಿಯದಲ್ಲಿದ್ದು, ಇಂದ್ರಿಯಾಭಿಮಾನಿ ದೇವತೆಗಳ ಮುಖೇನ ಅನುಭವ ಕೊಡುತ್ತಾನೆ. ಜೀವ ಭಗವಂತನ ಅನುಗ್ರಹದಿಂದ ವಿಷಯಗಳನ್ನು ಅನುಭವಿಸಲು ಆರಂಭಿಸುತ್ತಾನೆ.

ಒಬ್ಬ ಜೀವನಿಗೆ ಒಟ್ಟು ಮೂರು ಶರೀರಗಳಿರುತ್ತವೆ. ಒಂದು ಕಾಣುವ ಸ್ಥೂಲ ಶರೀರ, ಅದರೊಳಗೆ ಸೂಕ್ಷ್ಮ ಶರೀರ(ಅನಿರುದ್ಧ ಶರೀರ) ಮತ್ತು ಅದರೊಳಗೆ ಲಿಂಗ ಶರೀರ. ಈ ಸ್ಥೂಲ ಶರೀರವನ್ನು ಪ್ರವೇಶಿಸುವ ಸೂಕ್ಷ್ಮಶರೀರಿ ಜೀವಕ್ಕೆ ಎಲ್ಲಾ ಇಂದ್ರಿಯಗಳೂ ಇರುತ್ತವೆ. ಆದ್ದರಿಂದ ಈ ಜೀವ ತನ್ನ ಪೂರ್ವಜನ್ಮದ ನೆನಪನ್ನು ಅಂತರಂಗದಲ್ಲಿಟ್ಟುಕೊಂಡು ಗರ್ಭವನ್ನು ಪ್ರವೇಶಿಸುತ್ತಾನೆ. ಪೂರ್ವ ಜನ್ಮದ ಅಧ್ಯಾತ್ಮ ಸಾಧನೆ ಈ ಸೂಕ್ಷ್ಮ ಜೀವದ ಮನಸ್ಸಿನಲ್ಲಿ ಪೂರ್ಣವಾಗಿ ಉಳಿದಿರುತ್ತದೆ. ಇದಕ್ಕಾಗಿ 'ಅಧ್ಯಾತ್ಮ ಸಾಧನೆ ಎಂದೂ ವ್ಯರ್ಥವಾಗುವುದಿಲ್ಲ, ಅದು ಸದಾ ನಮ್ಮೊಂದಿಗೆ ಸಾವಿನಲ್ಲೂ ಜೊತೆಯಾಗಿ ಬರುತ್ತದೆ' ಎಂದು ಹೇಳುವುದು. ಏಕೆಂದರೆ ಸಾವು ಕೇವಲ ಸ್ಥೂಲ ಶರೀರಕ್ಕೇ ಹೊರತು ಸೂಕ್ಷ್ಮಶರೀರಕ್ಕಲ್ಲ. ಸಂಮೋಹನ ನಿದ್ರೆಯಲ್ಲಿ(hypnotism) ಜೀವದ ಪೂರ್ವಜನ್ಮದ ವಿಷಯವನ್ನು ತಿಳಿಯಲು ಸಾಧ್ಯವಾಗುವುದು ಈ ಕಾರಣದಿಂದ. ನಮಗೆ ಕೆಲವೊಮ್ಮೆ ಒಬ್ಬರನ್ನು ನೋಡಿದಾಗ ಹಿಂದೆ ತುಂಬಾ ಪರಿಚಿತರಾಗಿ ನಮ್ಮೊಂದಿಗಿದ್ದವರಂತೆ ಕಂಡರೆ-ಅದಕ್ಕೆ ಪೂರ್ವ ಜನ್ಮದ ನೆನಪೂ ಒಂದು ಕಾರಣವಾಗಿರಬಹುದು. ಈ ನೆನಪು ಒಳಗಿರುವ ಸೂಕ್ಷ ಶರೀರದಲ್ಲಿ ಮಾತ್ರ ಜಾಗೃತವಾಗಿರುತ್ತದೆ-ಆದರೆ ಸ್ಥೂಲ ಇಂದ್ರಿಯದಲ್ಲಿ ಇದು ಜಾಗೃತವಾಗಿರುವುದಿಲ್ಲ. ಹೀಗೆ ಜೀವ ಸ್ಥೂಲ ಶರೀರವನ್ನು ಪ್ರವೇಶ ಮಾಡುವಾಗ ಇಂದ್ರಿಯಗಳನ್ನು ಕರ್ಷಣೆ ಮಾಡಿಕೊಂಡು ಬರುತ್ತಾನೆ ಮತ್ತು ಹೋಗುವಾಗ ಕರ್ಷಣೆ ಮಾಡಿಕೊಂಡು ಹೋಗುತ್ತಾನೆ. ಈ ಕ್ರಿಯೆಯಲ್ಲಿ ಜೀವ ಸ್ವತಂತ್ರನಲ್ಲ. ಇದನ್ನು ಮಾಡಿಸುವವ 'ಈಶ್ವರ'. ಇಲ್ಲಿ ಈಶ್ವರ ಎಂದರೆ

ಸರ್ವ ಸಮರ್ಥ ಭಗವಂತ ಎಂದರ್ಥ. ಶಂಕರಾಚಾರ್ಯರು ತಮ್ಮ ಭಾಷ್ಯದಲ್ಲಿ "ಈಶ್ವರಃ ಈಶನಶೀಲೋ ನಾರಾಯಣಃ" ಎಂದಿದ್ದಾರೆ. ಇಲ್ಲಿ 'ಈಶನಶೀಲಃ' ಎಂದರೆ ಸರ್ವಸಮರ್ಥ ಎಂದರ್ಥ.

ಈ ಶ್ಲೋಕದಲ್ಲಿ ಶಬ್ದಗಳ ಚಮತ್ಕಾರವಿದೆ. 'ಅವಾಪ್ನೋತಿ' ಎನ್ನುವಲ್ಲಿ 'ಅವ' ಅನ್ನುವುದು ಉಪಸರ್ಗ. ಹದಿನೈದು ಬೇಲಿಗಳೊಂದಿಗೆ ಜೀವ ದೇಹವನ್ನು ಪ್ರವೇಶಿಸುವುದು ಜೀವದ ಬಂಧನ. ಇದು ಒಂದು ರೀತಿಯ 'ಅಧಃಪಾತ'. ಆದರೆ ಇದು ಊರ್ಧ್ವಗಮನಕ್ಕೆ ಪೂರ್ವ ಜೀವದ ಅಧಃಪಾತ. ಏಕೆಂದರೆ ಜೀವ ಮೋಕ್ಷ ಸೇರಲು ಈ ಸಾಧನಾ ಶರೀರ ಬೇಕೇಬೇಕು. ಇದೇ ರೀತಿ ಜೀವ ದೇಹವನ್ನು ಬಿಟ್ಟು ಹೊರ ಹೋಗುವುದನ್ನು 'ಉತ್ಕ್ರಾಮತಿ' ಎಂದಿದ್ದಾರೆ. ಸಾವು ಎಂದರೆ ಜೀವನನ್ನು ಭಗವಂತ ಸ್ಥೂಲ ಶರೀರದಿಂದ ಆಚೆ ಕರೆದುಕೊಂಡು ಹೋಗುವುದು. ಇದು ಅಮಂಗಳವಲ್ಲ. ಅದಕ್ಕಾಗಿ ಇಲ್ಲಿ 'ಉತ್' ಎನ್ನುವ ಉಪಸರ್ಗವನ್ನು ಬಳಸಲಾಗಿದೆ. ಇನ್ನು ಭಗವಂತ ಜೀವನನ್ನು ಕರೆತರುವುದನ್ನು ಇಲ್ಲಿ 'ಸಂಯಾತಿ' ಎಂದಿದ್ದಾರೆ. ಸಂ-ಎಂದರೆ ಸ್ವಯಂ, ಸ್ವೇಚ್ಛಾಯ, ಸ್ವಾತಂತ್ರೇಣ. ಎಲ್ಲವೂ ಭಗವಂತನ ಅಧೀನ, ಜೀವ ಸ್ವತಂತ್ರ ಅಲ್ಲ, ಕೇವಲ ಭಗವಂತ ಸ್ವತಂತ್ರ ಅನ್ನುವುದನ್ನು ಇದು ಸೂಚಿಸುತ್ತದೆ. ಜೀವನಿಗೆ ಹುಟ್ಟುವುದಕ್ಕಾಗಲೀ, ಸಾಯುವುದಕ್ಕಾಗಲೀ ಸ್ವಾತಂತ್ರ್ಯವಿಲ್ಲ. ಎಲ್ಲವೂ ಭಗವಂತನ ನಿಯಮನದಂತೇ ನಡೆಯುತ್ತದೆ.

ಹೇಗೆ ಜೀವ ತನ್ನ ಇಂದ್ರಿಯಗಳೊಂದಿಗೆ ಭಗವಂತನ ಜೊತೆಗೆ ಒಳ ಬರುತ್ತದೆ ಮತ್ತು ಹೊರ ಹೋಗುತ್ತದೆ ಎನ್ನುವುದನ್ನು ಹೂವಿನ ಸುಗಂಧದ ದೃಷ್ಟಾಂತದೊಂದಿಗೆ ಕೃಷ್ಣ ವಿವರಿಸಿದ್ದಾನೆ. ಅರಳಿ ನಿಂತಿರುವ ಹೂವಿನ ಸುಗಂಧ ಹೇಗೆ ನಮ್ಮ ಮೂಗನ್ನು ಬಂದು ಪ್ರವೇಶಿಸುತ್ತದೆಯೋ ಹಾಗೇ ಈ ಜೀವದ ಗತಿ. ಅದು ಕಾಣುವುದಿಲ್ಲ. ಹೂವಿನ ಸುಗಂಧದ ಸೂಕ್ಷ್ಮಾಣುಗಳು ನಮ್ಮ ಮೂಗನ್ನು ಪ್ರವೇಶಿಸುವುದು ನಮಗೆ ತಿಳಿಯುವುದು ಕೇವಲ ಸುವಾಸನೆಯಿಂದಾಗಿ, ಹೊರತು ಭೌತಿಕವಾಗಿ ಅಲ್ಲ. ಜೀವದ ಈ ಎಲ್ಲಾ ಗತಿ ಕೂಡಾ ಇದೇ ರೀತಿ. ಅದು ಕಾಣುವುದಿಲ್ಲ. ಇದನ್ನೇ ಇನ್ನೂ ಸ್ಪಷ್ಟವಾಗಿ ಕೃಷ್ಣ ಮುಂದಿನ ಮೂರು ಶ್ಲೋಕದಲ್ಲಿ ವಿವರಿಸುತ್ತಾನೆ.

ಶ್ರೋತ್ರಂ ಚಕ್ಷುಃ ಸ್ಪರ್ಶನಂ ಚ ರಸನಂ ಘ್ರಾಣಮೇವ ಚ।
ಅಧಿಷ್ಠಾಯ ಮನಶ್ಚಾಯಂ ವಿಷಯಾನುಪಸೇವತೇ ॥೯॥

ಶ್ರೋತ್ರಮ್ ಚಕ್ಷುಃ ಸ್ಪರ್ಶನಮ್ ಚ ರಸನಮ್ ಘ್ರಾಣಮ್ ಏವ ಚ ।
ಅಧಿಷ್ಠಾಯ ಮನಃ ಚ ಅಯಮ್ ವಿಷಯಾನ್ ಉಪಸೇವತೇ–ಕಿವಿ, ಕಣ್ಣು, ತೊಗಲು, ನಾಲಿಗೆ, ಮೂಗು ಮತ್ತು ಮನಸ್ಸಿನಲ್ಲಿ ನೆಲೆನಿಂತು 'ಇವನು' ವಿಷಯಗಳನ್ನು ಸವಿಯುತ್ತಾನೆ.

ಭಗವಂತ ನಮ್ಮ ಪ್ರತಿಯೊಂದು ಇಂದ್ರಿಯದಲ್ಲಿ ನಿಯಾಮಕನಾಗಿ ಆಯಾ ರೂಪದಲ್ಲಿ ನಿಂತು, ವಿಷಯಗಳನ್ನು ದುಃಖದ ಲೇಪವಿಲ್ಲದೆ ಗ್ರಹಿಸುತ್ತಾನೆ ಮತ್ತು ನಮಗೆ ವಿಷಯದ ಅನುಭವವನ್ನು ಕೊಡುತ್ತಾನೆ. ಈ ಶ್ಲೋಕ ಭಗವಂತನನ್ನು ಹೇಳುವುದರಿಂದ ಇಲ್ಲಿ 'ಉಪ-ಸೇವತೆ' ಮತ್ತು 'ಅಧಿಷ್ಠಾಯ' ಎನ್ನುವ ಎರಡು ವಿಶೇಷ ಪದಗಳನ್ನು ಬಳಸಿದ್ದಾರೆ. ಉಪ ಅಂದರೆ -ಉಪರಿ=ಎತ್ತರ. ನಾವು ಸುಖ-ದುಃಖದಲ್ಲಿ ಮುಳುಗಿ ವಿಷಯ ಭೋಗಿಸಿದರೆ, ಭಗವಂತ ಎಲ್ಲವನ್ನೂ ಮೀರಿನಿಂತು ದುಃಖದ ಲೇಪವಿಲ್ಲದೆ ಎಲ್ಲವನ್ನೂ ಅನುಭವಿಸುತ್ತಾನೆ.

ಭಗವಂತ ಆಯಾ ಇಂದ್ರಿಯದಲ್ಲಿ ವಿಶೇಷ ರೂಪದಲ್ಲಿ ಸನ್ನಿಹಿತನಾಗಿ ನಿಯಮಿಸುವುದರಿಂದ ಇಲ್ಲಿ 'ಅಧಿಷ್ಠಾಯ' ಎನ್ನುವ ಪದವನ್ನು ಬಳಸಲಾಗಿದೆ. ಏವ ಮತ್ತು ಚ ಇವೆರಡನ್ನು ಈ ಶ್ಲೋಕದಲ್ಲಿ ಒಟ್ಟಾಗಿ ಬಳಸಲಾಗಿದೆ. ಇದು ಭಗವಂತನ ವಿಶೇಷ ಗುಣವನ್ನು ಬಿಂಬಿಸುತ್ತದೆ. ಆ+ಈ+ವ+ಚ=ಏವಚ( set of abbreviations-ಸಂಕ್ಷೇಪ-ಪದ)-ಅಂದರೆ ಯಾವುದೇ ದೋಷವಿಲ್ಲದ, ಸರ್ವಗುಣಗಳಿಂದ ಸಮುಚ್ಛಿತವಾದ ಜ್ಞಾನಾನಂದಮಯ ಭಗವಂತ.

ಉತ್ ಕ್ರಾಮಂತಂ ಸ್ಥಿತಂ ವಾऽಪಿ ಭುಂಜಾನಂ ವಾ ಗುಣಾನ್ವಿತಮ್ ।
ವಿಮೂಢಾ ನಾನುಪಶ್ಯಂತಿ ಪಶ್ಯಂತಿ ಜ್ಞಾನಚಕ್ಷುಷಃ ॥೧೦॥

ಉತ್ ಕ್ರಾಮಂತಮ್ ಸ್ಥಿತಮ್ ವಾ ಅಪಿ ಭುಂಜಾನಮ್ ವಾ ಗುಣ ಅನ್ವಿತಮ್ ।
ವಿಮೂಢಾಃ ನ ಅನುಪಶ್ಯಂತಿ ಪಶ್ಯಂತಿ ಜ್ಞಾನ ಚಕ್ಷುಷಃ –ದೇಹ ತೊರೆದು ತೆರಳುವ, ದೇಹದಲ್ಲಿರುವ, ಅಥವಾ ಒಳಿತಿನ ಸಾರವನ್ನು ಸವಿಯುವ ಇವನನ್ನು ತಿಳಿಗೇಡಿಗಳು ತಿಳಿಯಲಾರರು. ತಿಳಿಗಣ್ಣು ತೆರೆದವರು ತಿಳಿಯಬಲ್ಲರು.

ಈ ಶ್ಲೋಕದಲ್ಲಿ ಬಳಸಿರುವ 'ಗುಣಾನ್ವಿತಮ್' ಎನ್ನುವ ಪದ ಸ್ಪಷ್ಟವಾಗಿ ನಮಗೆ ತಿಳಿಸುತ್ತದೆ-ಇದು ಭಗವಂತನನ್ನು ಹೇಳುವ ಶ್ಲೋಕ ಎಂದು. ಜೀವನನ್ನು ದೇಹಕ್ಕೆ ತರುವ, ಎಚ್ಚರ ಕನಸು ನಿದ್ದೆ ಎನ್ನುವ ಮೂರು ಅವಸ್ಥೆಗಳಲ್ಲಿ ಜೀವನಿಗೆ ವಿಷಯ ಭೋಗವನ್ನು ಕೊಡುವ ಭಗವಂತ-ತಾನು ಸದಾ ಶುಭ ಭೋಗವನ್ನುಣ್ಣುವವ. ದೇಹದಿಂದ ಹೊರ ಹೋಗುವಾಗ, ದೇಹದಲ್ಲಿರುವಾಗ-ಎಲ್ಲವನ್ನು ಮಾಡಿಸುವವ ಆ ಭಗವಂತ. ಆತ ನಮ್ಮೊಳಗೇ ಇದ್ದರೂ ಕೂಡಾ ವಿಮೂಢರಿಗೆ ಇದು ತಿಳಿಯುವುದಿಲ್ಲ. ಜ್ಞಾನದ ಕಣ್ಣುತೆರೆದವರು ಮಾತ್ರ ಇದನ್ನು ತಿಳಿಯಬಲ್ಲರು. ಇಲ್ಲಿ ಕೃಷ್ಣ 'ವಿಮೂಢ' ಮತ್ತು 'ಜ್ಞಾನಚಕ್ಷುಷಃ' ಎನ್ನುವ ಎರಡು ವಿಶೇಷ ಪದಗಳನ್ನು ಬಳಸಿದ್ದಾನೆ. 'ಮೂಢರು' ಎಂದರೆ ಸತ್ಯವನ್ನು ತಪ್ಪಾಗಿ ತಿಳಿದವರು. ಇವರು ಯಥಾರ್ಥಜ್ಞಾನ ಮರೆಯಾಗಿ ವಿಪರೀತಜ್ಞಾನದಲ್ಲೇ ಬದುಕುತ್ತಿರುತ್ತಾರೆ. 'ವಿ-ಮೂಢ' ಎಂದರೆ ಎಂದೂ ತಮ್ಮ ತಪ್ಪನ್ನು ತಿಳಿಯದೇ, ತಪ್ಪನ್ನೇ ಸರಿಯೆಂದು ಸದಾ ವಿಪರೀತ ಜ್ಞಾನದಲ್ಲೇ ಬದುಕುವವರು. ಇವರಿಗೆ ಭಗವಂತನನ್ನು ಎಂದೆಂದಿಗೂ ತಿಳಿಯಲು ಸಾಧ್ಯವಿಲ್ಲ. ಭಗವಂತನನ್ನು ಕಾಣುವ ಕ್ಷಮತೆ ಉಳ್ಳವರು ಜ್ಞಾನಚಕ್ಷುಷರು. ಅಂದರೆ ಶಾಸ್ತ್ರವನ್ನು ಓದಿ ಅದರಿಂದ ಅರಿವಿನ ಒಳಗಣ್ಣು ತೆರೆದವರು. ಇವರು ಭಗವಂತನನ್ನು ತಿಳಿಯಬಲ್ಲರು ಮತ್ತು ತಮ್ಮ ಸ್ವರೂಪಭೂತವಾದ ಕಣ್ಣಿನಿಂದ ಭಗವಂತನನ್ನು ಕಾಣಬಲ್ಲರು.

ಯತಂತೋ ಯೋಗಿನಶ್ಚೈನಂ ಪಶ್ಯಂತ್ಯಾತ್ಮನ್ಯವಸ್ಥಿತಮ್ ।
ಯತಂತೋऽಪ್ಯಕೃತಾತ್ಮಾನೋ ನೈನಂ ಪಶ್ಯಂತ್ಯಚೇತಸಃ ॥೧೧॥

ಯತಂತಃ ಯೋಗಿನಃ ಚ ಎನಮ್ ಪಶ್ಯಂತಿ ಆತ್ಮನಿ ಅವಸ್ಥಿತಮ್ ।
ಯತಂತಃ ಅಪಿ ಅಕೃತ ಆತ್ಮಾನಃ ನ ಏನಮ್ ಪಶ್ಯಂತಿ ಅಚೇತಸಃ –ಪ್ರಯತ್ನಶೀಲರಾದ ಸಾಧಕರು-

ತಮ್ಮೊಳಗಿರುವ 'ಇವನನ್ನು' ಕಾಣುತ್ತಾರೆ. ತಿಳಿಯಾದ ತಿಳಿವಿರದ ತಿಳಿಗೇಡಿಗಳು ಪ್ರಯತ್ನಿಸಿಯೂ ಇವನನ್ನು ಕಾಣಲಾರರು.

ಭಗವಂತನನ್ನು ಕಾಣಬೇಕಾದರೆ ಕೇವಲ ಶಾಸ್ತ್ರಾಭ್ಯಾಸ ಮಾಡಿದರೆ ಸಾಲದು. ಜ್ಞಾನ ಪಡೆದು ಜ್ಞಾನದಿಂದ ನಿರಂತರ ಸಾಧನೆ ಅಗತ್ಯ. ಧ್ಯಾನ ಯೋಗದಿಂದ ನಿರಂತರ ಭಗವಂತನನ್ನು ಕಾಣುವ ಪ್ರಯತ್ನ ಮಾಡಿದಾಗ-ಆತ್ಮಸಾಕ್ಷಾತ್ಕಾರವಾಗುತ್ತದೆ[ಧ್ಯಾನದ ಕುರಿತು ಅಧ್ಯಾಯ ಆರರಲ್ಲಿ ಈಗಾಗಲೇ ನಾವು ಸಾಕಷ್ಟು ಚರ್ಚಿಸಿದ್ದೇವೆ]. ಭಗವಂತನನ್ನು ಕಾಣಲು ನಮ್ಮ ಪ್ರಯತ್ನದೊಂದಿಗೆ ಆತನ ಅನುಗ್ರಹವೂ ಬೇಕು. ಇಲ್ಲದಿದ್ದರೆ ಯಾವ ಮಹಾಪ್ರಯತ್ನದಿಂದಲೂ ಭಗವಂತನನ್ನು ಕಾಣಲು ಸಾಧ್ಯವಿಲ್ಲ. ಉದಾಹರಣೆಗೆ ನಾವು ಹೊಲವನ್ನು ಚೆನ್ನಾಗಿ ಉತ್ತು, ಹದಗೊಳಿಸಿ, ಗೊಬ್ಬರ ಹಾಕಿ ಉತ್ತಮ ದರ್ಜೆಯ ಬೀಜ ಬಿತ್ತಬಹುದು, ಆದರೆ ಮಳೆ ಸರಿಯಾಗಿ ಬಾರದಿದ್ದರೆ? ಅತಿ ಮಳೆ ಬಂದು ಕೊಚ್ಚಿಕೊಂಡು ಹೋದರೆ? ಇದೆಲ್ಲವೂ ದೈವಾನುಗ್ರಹ. ಅದಕ್ಕಾಗಿ ನಿರಂತರ ಪ್ರಯತ್ನದೊಂದಿಗೆ ಭಗವಂತನಲ್ಲಿ ಶರಣಾಗತಿ ಬಹಳ ಮುಖ್ಯ. "ನನ್ನ ಮನಸ್ಸನ್ನು ಸ್ವಚ್ಛಮಾಡು, ಸ್ವಚ್ಛವಾದ ಮನಸ್ಸಿನಲ್ಲಿ ನೀನು ಬಂದು ನೆಲೆಸು" ಎಂದು ಆ ಭಗವಂತನನ್ನು ಪ್ರಾರ್ಥಿಸಬೇಕು. ಶುದ್ಧವಾದ ಸಾತ್ವಿಕ ಮನಸ್ಸಿಗೆ 'ವಸುದೇವ' ಎನ್ನುತ್ತಾರೆ. ಆ ವಸುದೇವನಿಗೆ ಕಾಣಿಸಿಕೊಳ್ಳುವ ಭಗವಂತ ವಾಸುದೇವ. ಸಮಸ್ತಶಾಸ್ತ್ರ ಓದಿ ಅಶುದ್ಧಮನಸ್ಸಿನವನಾಗಿದ್ದರೆ (ಅಕೃತಾತ್ಮ=ಅಶುದ್ಧ ಬುದ್ಧಯಃ)- ಎಷ್ಟೇ ಪ್ರಯತ್ನ ಮಾಡಿದರೂ ಭಗವಂತ ಒಲಿಯಲಾರ. ಇದನ್ನೇ 'ಮಡಿ' ಎನ್ನುವುದು. ಮಾನಸಿಕವಾಗಿ ಮಡಿಯಾಗಿ ನಾವು ಪ್ರಯತ್ನ ಮಾಡಬೇಕು. "ನಿರಂತರ ಜ್ಞಾನಪೂರ್ವಕ ಪ್ರಯತ್ನದಿಂದ ನಿನ್ನ ಅತ್ಯಂತ ಸಮೀಪವಿರುವ, ನಿನ್ನಂತರಂಗದೊಳಗೆ ನಿನ್ನ ಜೀವಸ್ವರೂಪದೊಳಗಿರುವ ಭಗವಂತನನ್ನು ಕಾಣು" ಎನ್ನುತ್ತಾನೆ ಕೃಷ್ಣ. ಹಿಂದಿನ ಶ್ಲೋಕದಲ್ಲಿ ಅಯಮ್(ಎದುರಿಗಿರುವ) ಎಂದ ಕೃಷ್ಣ, ಇಲ್ಲಿ 'ಏನಮ್'(ನಿನ್ನ ಅತ್ಯಂತ ಸಮೀಪವಿರುವ) ಎಂದ. ನಾವು ಭಗವಂತನನ್ನು ಎಲ್ಲೋ ಹುಡುಕುವುದು ಬೇಡ. ಆತ ನಮ್ಮ ಜೀವ ಸ್ವರೂಪದೊಳಗೇ ಬಿಂಬ ರೂಪನಾಗಿ ನೆಲೆಸಿದ್ದಾನೆ. ಆತನ ನೆಲೆಯಾದ ನಮ್ಮ ಜೀವಸ್ವರೂಪವನ್ನು ತಿಳಿದಾಗ ಆತ ನಮಗೆ ಕಾಣಿಸುತ್ತಾನೆ.

ಯದಾದಿತ್ಯಗತಂ ತೇಜೋ ಜಗದ್ ಭಾಸಯತೇಽಖಿಲಮ್ ।
ಯಚ್ಚಂದ್ರಮಸಿ ಯಚ್ಚಾಗ್ನೌ ತತ್ ತೇಜೋ ವಿದ್ಧಿ ಮಾಮಕಮ್॥೧೨॥

ಯತ್ ಆದಿತ್ಯಗತಮ್ ತೇಜಃ ಜಗತ್ ಭಾಸಯತೇ ಅಖಿಲಮ್ ।
ಯತ್ ಚಂದ್ರಮಸಿ ಯತ್ ಚ ಅಗ್ನೌ ತತ್ ತೇಜಃ ವಿದ್ಧಿ ಮಾಮಕಮ್ –ಸೂರ್ಯನಲ್ಲಿದ್ದು ವಿಶ್ವವನ್ನೆಲ್ಲಾ ಬೆಳಗುವ ಬೆಳಕು, ಚಂದ್ರನಲ್ಲಿ, ಬೆಂಕಿಯಲ್ಲಿ ಕೂಡಾ, ಅದು ನನ್ನದೇ ಬೆಳಕೆಂದು ತಿಳಿ.

ಹಿಂದೆ-ಸೂರ್ಯನಾಗಲೀ, ಚಂದ್ರನಾಗಲೀ, ಅಗ್ನಿಯಾಗಲೀ ನನ್ನನ್ನು ಬೆಳಗಿಸುವುದಿಲ್ಲ ಎಂದಿದ್ದ ಕೃಷ್ಣ, ಇಲ್ಲಿ ಸೂರ್ಯ ಬೆಳಗುವುದು, ಚಂದ್ರ ಬೆಳಗುವುದು, ಅಗ್ನಿ ಬೆಳಗುವುದು -ಎಲ್ಲವೂ ನನ್ನಿಂದ ಎನ್ನುತ್ತಾನೆ. ಎಲ್ಲಾ ಬೆಳಕಿನ ಮೂಲ ಬೆಳಕು ಭಗವಂತ. ಬೆಳಕಿನ ಮೂಲಗಳೆಂದರೆ ಸೂರ್ಯ, ಚಂದ್ರ, ನಕ್ಷತ್ರ, ಮಿಂಚು, ವಿದ್ಯುತ್ ಹಾಗೂ

ಅಗ್ನಿ. ಈ ಎಲ್ಲಾ ಬೆಳಕಿನ ಪುಂಜಗಳಿಗೆ ಬೆಳಕನ್ನು ಕೊಡುವವನು ಆ ಭಗವಂತ. ಅಂದರೆ "ಸೂರ್ಯನಿಂದ ಹಿಡಿದು, ಚಂದ್ರ ತಾರೆಗಳಾಗಲೀ, ಆಕಾಶದಲ್ಲಿ ಬೆಳಗುವ ಮಿಂಚಿರಲೀ, ಅಥವಾ ಉರಿಯುವ ಅಗ್ನಿಯಾಗಲೀ, ಈ ಎಲ್ಲಾ ಬೆಳಕಿನ ಪುಂಜಗಳು ಬೆಳಗುವುದು ಭಗವಂತನೆಂಬ ಮೂಲ ಬೆಳಕಿನಿಂದ. ಯಾವ ಬೆಳಕು ನಮ್ಮ ಸ್ವರೂಪದೊಳಗೆ ಅಣೋರಣೀಯವಾಗಿ ನಿಂತು ನಮ್ಮನ್ನು ನಡೆಸುತ್ತಿದೆಯೋ, ಅದೇ ಬೆಳಕು ಮಹತೋಮಹಿಯಾಗಿ ಇಡೀ ಬ್ರಹ್ಮಾಂಡವನ್ನು ಬೆಳಗಿಸುತ್ತಿದೆ. ಒಟ್ಟಿನಲ್ಲಿ ಎಲ್ಲಾ ಬೆಳಕುಗಳ ಮೂಲ ತೇಜಸ್ಸು ಆ ಭಗವಂತ. ಉಪನಿಷತ್ಕಾರರು ಇಂತಹ ಮಹಾ ಬೆಳಕಿನ ಬಗ್ಗೆ ವಿವರಿಸುತ್ತಾ ಹೇಳುತ್ತಾರೆ: "..ಯದೇತದ್ ವಿದ್ಯುತೋ ವ್ಯದ್ಯುತದಾ ಇತಿ.." ಎಂದು (ಕೇನ-೪.೪). ಅವರು ಇಲ್ಲಿ ಈ ಬೆಳಕನ್ನು 'ಆ-ಇತಿ' ಎನ್ನುತ್ತಾರೆ. ಅಂದರೆ ಇದೊಂದು 'ವಿಸ್ಮಯ' ಎಂದರ್ಥ. ತಿಳಿಯುವ ತನಕ ಆಶ್ಚರ್ಯ, ತಿಳಿದ ಮೇಲೆ ಆನಂದ.

ಉಪಾಸನೆಯ ದೃಷ್ಟಿಯಲ್ಲಿ ಈ ಶ್ಲೋಕವನ್ನು ನೋಡಿದರೆ: ಸೂರ್ಯನಲ್ಲಿರುವ ತೇಜಸ್ಸು-ನಾರಾಯಣನ ತೇಜಸ್ಸು, ಚಂದ್ರನಲ್ಲಿರುವ ತೇಜಸ್ಸು-ಧನ್ವಂತರಿಯ ತೇಜಸ್ಸು, ಅಗ್ನಿಯಲ್ಲಿರುವ ತೇಜಸ್ಸು-ಪರಶುರಾಮನ ತೇಜಸ್ಸು. ಹೀಗೆ ಪ್ರತಿಯೊಂದು ಬೆಳಕಿನ ಮೂಲ ಬೆಳಕು ಭಗವಂತ ಎಂದು ನಾವು ಈ ಶ್ಲೋಕದಿಂದ ಉಪಾಸನೆ ಮಾಡಬಹುದು.

ಗಾಮಾವಿಶ್ಯ ಚ ಭೂತಾನಿ ಧಾರಯಾಮ್ಯಹಮೋಜಸಾ ।
ಪುಷ್ಣಾಮಿ ಚೌಷಧೀಃ ಸರ್ವಾಃ ಸೋಮೋ ಭೂತ್ವಾ ರಸಾತ್ಮಕಃ ॥೧೩॥

ಗಾಮ್ ಆವಿಶ್ಯ ಚ ಭೂತಾನಿ ಧಾರಯಾಮಿ ಅಹಮ್ ಓಜಸಾ ।
ಪುಷ್ಣಾಮಿ ಚ ಓಷಧೀಃ ಸರ್ವಾಃ ಸೋಮಃ ಭೂತ್ವಾ ರಸಾತ್ಮಕಃ –ಭೂಮಿಯೊಳಹೊಕ್ಕು ಜೀವಿಗಳನ್ನು ನಾನೇ ನನ್ನಳವಿನಿಂದ ಹೊತ್ತಿದ್ದೇನೆ. ಅಮೃತ ರಸಮಯನಾದ ಚಂದ್ರನಾಗಿ [ಸೌಮ್ಯರೂಪನಾದ್ದರಿಂದ 'ಸೋಮ' ನಾಮಕನಾಗಿ ಚಂದ್ರನೊಳಗಿದ್ದು] ಎಲ್ಲಾ ಸಸ್ಯಗಳನ್ನು ಬೆಳೆಸುತ್ತೇನೆ.

ಇಲ್ಲಿ ಗಾಮ್ ಅಂದರೆ 'ಪ್ರಥಿವಿ'. ಈ ಭೂಮಿ ಆಕಾಶದಲ್ಲಿ ನಿರಾಲಂಭವಾಗಿ ನಿಲ್ಲುವಂತೆ ಸಂಕರ್ಷಣಶಕ್ತಿ (ಶೇಷಶಕ್ತಿ-ಆಕರ್ಷಣಶಕ್ತಿ- Gravitational force) ರೂಪದಲ್ಲಿ ಭೂಮಿಯನ್ನು ಹೊತ್ತವನು ಭಗವಂತ. ಇದು ಭಗವಂತನ ವರಾಹ ಅವತಾರವನ್ನು ವಿವರಿಸುತ್ತದೆ. ಕೆಳಕ್ಕೆ ಕುಸಿದು ನಾಶವಾಗಲಿದ್ದ ಭೂಮಿಯನ್ನು ಭಗವಂತ ವರಾಹ ರೂಪದಲ್ಲಿ ಎತ್ತಿ ಹಿಡಿದ-ಎನ್ನುವುದು ಕಥೆ. ಇಲ್ಲಿ ಭೂಮಿ ಕೆಳಕ್ಕೆ ಕುಸಿಯುವುದು ಅಂದರೆ ಅದು ತನ್ನ ಕಕ್ಷೆಯಿಂದ ಕಳಚುವುದು. ಭೂಮಿ ಕಕ್ಷೆಯನ್ನು ಬಿಟ್ಟರೆ ಅದು ಕ್ಷಣಾರ್ಧದಲ್ಲಿ ನಾಶವಾಗುತ್ತದೆ. ತಾಮಸ ಲೋಕದ ದೈತ್ಯ ಹಿರಣ್ಯಾಕ್ಷ ಭೂಮಿಯನ್ನು ಕಕ್ಷೆಯಿಂದ ತಪ್ಪಿಸಿದವ. "ನನಗೆ ನಿಲ್ಲಲು ಒಂದು ಜಾಗ ಮತ್ತು ಒಂದು ಕೋಲನ್ನು ಕೊಟ್ಟರೆ ನಾನು ಭೂಮಿಯನ್ನು ಕಕ್ಷೆಯಿಂದ ಕಳಚಬಲ್ಲೆ" ಎಂದು ನ್ಯೂಟನ್ ಹೇಳಿರುವುದನ್ನು ನಾವು ಇಲ್ಲಿ ನೆನಪಿಸಿಕೊಳ್ಳಬಹುದು. ಈ ರೀತಿ ತಾಮಸ ಲೋಕದ ದೈತ್ಯ ಭೂಮಿಯನ್ನು ಕಕ್ಷೆಯಿಂದ ತಪ್ಪಿಸಿದಾಗ, ಭಗವಂತ ಅದನ್ನು ಮರಳಿ ಕಕ್ಷೆಯಲ್ಲಿಟ್ಟು ರಕ್ಷಿಸಿದ. ವೇದಕಾಲದ ಋಷಿಗಳಿಗೆ 'ಭೂಮಿಯನ್ನು ಧಾರಣೆ ಮಾಡಿದ ಭಗವಂತ ವರಾಹ ರೂಪನಾಗಿ ಕಂಡ'. ಈ ಕಾರಣದಿಂದ ಭೂಮಿಯನ್ನು ಧಾರಣೆ ಮಾಡಿರುವ ಭಗವಂತನ

ರೂಪವನ್ನು ವರಾಹ ರೂಪದಲ್ಲಿ ಕಾಣುತ್ತೇವೆ. ವರ=ಶ್ರೇಷ್ಠ. ಗಾಯತ್ರಿಯಲ್ಲಿ 'ವರೇಣ್ಯಂ' ಎನ್ನುವಲ್ಲಿ ಭೂಮಿಯನ್ನು ಧಾರಣೆ ಮಾಡಿರುವ ಭಗವಂತನ ವರಾಹ ರೂಪದ ಚಿಂತನೆ ಇದೆ. ರಷ್ಯನ್ ವಿಜ್ಞಾನಿ ವಿಲಿಕೋವಸ್ಕಿ(Velikovsky) ತನ್ನ **"Worlds in collision"** ಎನ್ನುವ ಪುಸ್ತಕದಲ್ಲಿ ಹೇಳುತ್ತಾನೆ : "ವೈಜ್ಞಾನಿಕವಾಗಿ ಎರಡು ಬಾರಿ ಭೂಮಿ ತನ್ನ ಕಕ್ಷೆಯಿಂದ ತಪ್ಪಿದ್ದು ನಿಜ, ಆದರೆ ನಮಗೆ ಇದು ಏಕೆ ಎನ್ನುವುದು ತಿಳಿದಿಲ್ಲ" ಎಂದು. ಆತ ಅಲ್ಲಿ ಭಾಗವತವನ್ನು ಉಲ್ಲೇಖಿಸಿ ಹೇಳುತ್ತಾನೆ: "ಭಾರತದ ಋಷಿಗಳು ಈ ವಿಚಾರವನ್ನು ತಿಳಿದಿದ್ದರು, ಒಂದು ದುಷ್ಟ ಶಕ್ತಿ ಭೂಮಿಯನ್ನು ಕಕ್ಷೆಯಿಂದ ಕಳಚಿತು, ಹಾಗೂ ಇನ್ನೊಂದು ದೈವೀ ಶಕ್ತಿ ಅದನ್ನು ಮರಳಿ ಕಕ್ಷೆಯಲ್ಲಿಟ್ಟಿತು" ಎಂದು. ಇದನ್ನೇ ಈ ಶ್ಲೋಕದಲ್ಲಿ ಕೃಷ್ಣ "ಗ್ರಾಮ್ ಧಾರಯಾಮಿ" ಎಂದಿದ್ದಾನೆ.

ಭೂಮಿಯನ್ನು ಧಾರಣೆ ಮಾಡಿರುವ ಭಗವಂತ ಭೂಮಿಯೊಳಗಿದ್ದು, ಪ್ರತಿಯೊಂದು ಜೀವಜಾತದೊಳಗಿದ್ದು ನಮ್ಮನ್ನು ರಕ್ಷಿಸುತ್ತಿದ್ದಾನೆ. ಉಪನಿಷತ್ತಿನಲ್ಲಿ ಹೇಳುವಂತೆ: "ಯ ಪ್ರಥಿವಿ ಅಂತರೋ ಯಮಯತಿ ಏಷತ ಆತ್ಮಾ ಅಂತರ್ಯಾಮಿ ಅಮೃತಃ". ಅಂದರೆ "ಪ್ರಥಿವಿಯ ಒಳಗಿದ್ದು ಭಗವಂತ ನಮ್ಮನ್ನು ರಕ್ಷಿಸುತ್ತಿದ್ದರೂ ಕೂಡಾ, ಅದು ನಮಗೆ ತಿಳಿದಿಲ್ಲ". ಈ ರೀತಿ ಭೂಮಿಯನ್ನು ಧಾರಣೆ ಮಾಡಿ ರಕ್ಷಿಸುವ ಭಗವಂತನ ಶಕ್ತಿಯನ್ನು ಇಲ್ಲಿ 'ಓಜಸ್ಸು' ಎಂದಿದ್ದಾರೆ. ಅಂದರೆ ಎಲ್ಲಾ ಅಡೆ-ತಡೆಗಳನ್ನು ನಿಗ್ರಹ ಮಾಡುವ ಶಕ್ತಿ.

ನಮ್ಮಲ್ಲಿ ಸಂಧ್ಯಾವಂದನೆ ಮಾಡುವಾಗ 'ಮನಸ್ಸಿನ ಸ್ನಾನ'ದ ಒಂದು ಕ್ರಮವಿದೆ. ನಮ್ಮ ಸಹಸ್ರಾರದಲ್ಲಿನ ಚಂದ್ರ ಮಂಡಲದಲ್ಲಿ ಕುಳಿತಿರುವ ಧನ್ವಂತರಿಯ ಕೈಯಲ್ಲಿರುವ ಅಮೃತಕಲಶದಿಂದ ಅಮೃತಧಾರೆ ಕೆಳಕ್ಕೆ ಹರಿದು ಬರುತ್ತಿರುವುದನ್ನು- ನಾವು ಮಾನಸಿಕವಾಗಿ ಅನುಭವಿಸಿ ಸ್ನಾನ ಮಾಡುವುದು. ಇಲ್ಲಿ ಇಪ್ಪತ್ನಾಲ್ಕು ಬಾರಿ 'ಓಂ-ವಂ' ಎಂದು ಹೇಳುವುದರಿಂದ ಆ ಚಂದ್ರಮಂಡಲದ ಅಮೃತ ದ್ರವ ಹರಿದು ನಾವು ಒಳಗಿನಿಂದ ಶುದ್ಧರಾಗುತ್ತೇವೆ. ಇದನ್ನು ಭಗವಂತನಲ್ಲಿ ಮನಸ್ಸನ್ನು ಏಕಾಗ್ರಗೊಳಿಸಿ, ಮಾನಸಿಕವಾಗಿ ಅನುಭವಿಸಿಕೊಂಡು ಮಾಡಿದಾಗ ಮನಸ್ಸು ಶುದ್ಧವಾಗುತ್ತದೆ. ನಮ್ಮಲ್ಲಿರುವ ಎಲ್ಲಕ್ಕಿಂತ ದೊಡ್ಡ ಕೊಳೆ ನಮ್ಮ ಮನಸ್ಸಿನಲ್ಲಿರುವ ಪಾಪಪುರುಷ. ಕೆಟ್ಟ ಭಾವನೆ, ಕೆಟ್ಟ ಯೋಚನೆ, ಅಸೂಯೆ, ಹೀಗೆ ಎಲ್ಲವೂ ತುಂಬಿರುವುದು ನಮ್ಮ ಮನಸ್ಸಿನಲ್ಲಿ. ಅದು ಹೋಗಬೇಕಾದರೆ ಈ ಚಂದ್ರ ಮಂಡಲದ ಅಮೃತ ಕಲಶದಿಂದ ಬರುವ ಅಮೃತ ದ್ರವದಿಂದ ಸ್ನಾನಮಾಡಬೇಕು. ಇದನ್ನೇ ಕೃಷ್ಣ ಇಲ್ಲಿ "ಸೋಮೋ ಭೂತ್ವಾ ರಸಾತ್ಮಕಃ" ಎಂದ. ಭಗವಂತ ಸೋಮ ರೂಪದಲ್ಲಿ ಚಂದ್ರನಲ್ಲಿ ತುಂಬಿದ್ದಾನೆ. ಆತ ನೀರಿನ ನಿಯಾಮಕ ಚಂದ್ರನಲ್ಲಿ ಸೋಮನಾಗಿ, ವನಸ್ಪತಿಗಳಲ್ಲಿ ಜೀವರಸ ತುಂಬಿದ. ನಾವು ಯಾವುದನ್ನು ತಿಂದು ಬದುಕುತ್ತೇವೋ, ಆ ಗಿಡವನ್ನು ರಕ್ಷಿಸಿ ಬೆಳೆಸುವವ-ಚಂದ್ರನಲ್ಲಿ ತುಂಬಿರುವ ಸೋಮ ರೂಪಿ ಭಗವಂತ.

ಅಹಂ ವೈಶ್ವಾನರೋ ಭೂತ್ವಾ ಪ್ರಾಣಿನಾಂ ದೇಹಮಾಶ್ರಿತಃ ।
ಪ್ರಾಣಾಪಾನಸಮಾಯುಕ್ತಃ ಪಚಾಮ್ಯನ್ನಂ ಚತುರ್ವಿಧಮ್ ॥೧೪॥

ಅಹಮ್ ವೈಶ್ವಾನರಃ ಭೂತ್ವಾ ಪ್ರಾಣಿನಾಮ್ ದೇಹಮ್ ಆಶ್ರಿತಃ ।
ಪ್ರಾಣ ಅಪಾನ ಸಮಾಯುಕ್ತಃ ಪಚಾಮಿ ಅನ್ನಮ್ ಚತುರ್ವಿಧಮ್ –ನಾನು 'ವೈಶ್ವಾನರ'ನಾಗಿ ಜೀವಿಗಳ ದೇಹದೊಳಗಿದ್ದು ಪ್ರಾಣ-ಅಪಾನರಿಂದೊಡಗೂಡಿ [ತಿನ್ನುವ, ಚೀಪುವ, ನೆಕ್ಕುವ, ಕುಡಿಯುವ] ನಾಲ್ಕು ಬಗೆಯ ಆಹಾರವನ್ನು ಕರಗಿಸುತ್ತೇನೆ.

ಇಲ್ಲಿ 'ಪಚಾಮ್ಯನ್ನಂ ಚತುರ್ವಿಧಮ್' ಎಂದರೆ ನಾಲ್ಕು ಬಗೆಯ ಅನ್ನವನ್ನು ಅರಗಿಸುವೆ" ಎಂದರ್ಥ. ಅನ್ನವೆಂದರೆ ಎಲ್ಲಾ ರೀತಿಯ 'ಆಹಾರ'. "ಪ್ರಾಣಿನಾಂ ದೇಹಮಾಶ್ರಿತಃ" ಎಂದರೆ 'ಪ್ರಾಣಿ'ಗಳು ತಿನ್ನಬಲ್ಲ ಆಹಾರ ಎಂದರ್ಥ. ಪ್ರಾಣಿಗಳ ಅಹಾರವನ್ನು ನಾಲ್ಕು ವಿಧಗಳಲ್ಲಿ ವಿಂಗಡಿಸಬಹುದು- ಭಕ್ಷ್ಯ, ಭೋಜ್ಯ, ಲೇಹ್ಯ ಮತ್ತು ಚೋಷ್ಯ. ಭಕ್ಷ್ಯ ಅಂದರೆ ಅಗಿದು, ಕಡಿದು ತಿನ್ನಲು ಯೋಗ್ಯವಾದುದು (ತಿನ್ನುವುದು); ಭೋಜ್ಯ ಅಂದರೆ ಅಗಿಯದೆಯೇ, ನವಣಿಸಿ ತಿನ್ನಲು ಯೋಗ್ಯವಾದುದು (ಉಣ್ಣುವುದು). ಲೇಹ್ಯ ಅಂದರೆ ನೆಕ್ಕಿ ತಿನ್ನಲು ಯೋಗ್ಯವಾದುದು; ಚೋಷ್ಯ ಅಂದರೆ ಕುಡಿಯಲು ಯೋಗ್ಯವಾದುದು. ಈ ನಾಲ್ಕು ವಿಧದ 'ಅನ್ನ'ವನ್ನು ಸೇವಿಸುವ ಎಲ್ಲಾ ಜೀವಿಗಳ ಜಠರದಲ್ಲಿ ಅಗ್ನಿಯ ರೂಪದಲ್ಲಿದ್ದು, ನಾಲ್ಕು ಬಗೆಯ ಅನ್ನವನ್ನು ಮೂರು ಬಗೆ(ಸೂಕ್ಷ್ಮ-ಮಧ್ಯ-ಸ್ಥೂಲ)ಯಲ್ಲಿ ವಿಭಾಗಮಾಡಿ, ದೇಹಕ್ಕೆ ಉಣಬಡಿಸಿ ನಮಗೆ ಬದುಕಲು ವ್ಯವಸ್ಥೆ ಮಾಡಿಸುವವ ವೈಶ್ವಾನರ ರೂಪಿ ಭಗವಂತ.

ನಾವು ಸೇವಿಸುವ ಆಹಾರ ಮಣ್ಣು-ನೀರು-ಬೆಂಕಿಯ ಮಿಶ್ರಣ. ಆಹಾರದಲ್ಲಿನ ಮಣ್ಣಿನ ಸೂಕ್ಷ್ಮ ಭಾಗ ಮೆದುಳಿಗೆ, ಮಧ್ಯ ಭಾಗ ಮಾಂಸ-ಚರ್ಮಕ್ಕೆ, ಹಾಗೂ ಸ್ಥೂಲ ಭಾಗ ಮಲವಾಗಿ ವಿಸರ್ಜನೆಯಾಗುತ್ತದೆ. ಅದೇ ರೀತಿ ನೀರಿನ ಸೂಕ್ಷ್ಮ ಭಾಗ ಉಸಿರಾಗಿ, ಮಧ್ಯ ಭಾಗ ನೆತ್ತರಾಗಿ, ಹಾಗೂ ಸ್ಥೂಲ ಭಾಗ ಮೂತ್ರವಾಗಿ ವಿನಿಯೋಗವಾಗುತ್ತದೆ. ಇನ್ನು ಬೆಂಕಿಯ ಸೂಕ್ಷ್ಮ ಭಾಗ ವಾಕ್ ಶಕ್ತಿಯಾಗಿ, ಮಧ್ಯ ಭಾಗ ಅಸ್ಥಿಮಜ್ಜೆಯಾಗಿ , ಸ್ಥೂಲ ಭಾಗ ಹಲ್ಲು ಮತ್ತು ಅಸ್ಥಿಯಾಗಿ ವಿನಿಯೋಗವಾಗುತ್ತದೆ. ಈ ರೀತಿ ಚಿನ್ನದ ಗಣಿಯಿಂದ ಚಿನ್ನವನ್ನು ಬೇರ್ಪಡಿಸುವುದಕ್ಕಿಂತ ಕಠಿಣವಾದ ಈ ಕಾರ್ಯವನ್ನು ನಮ್ಮೊಳಗಿದ್ದು ವ್ಯವಸ್ಥಿತ ರೀತಿಯಲ್ಲಿ ಮಾಡಿ, ನಮಗೆ ಜೀವನವನ್ನು ಕೊಡುವವನು ಆ ಭಗವಂತ. ಭಗವಂತನ ಈ ಕಾರ್ಯಕ್ಕೆ ಸೇವಕ ಪ್ರಾಣ-ಅಪಾನ ಎನ್ನುವ ಪ್ರಾಣದೇವರ ಎರಡು ರೂಪಗಳು. ಕಠೋಪನಿಷತ್ತಿನಲ್ಲಿ ಹೇಳುವಂತೆ:

ಊರ್ಧ್ವಂ ಪ್ರಾಣಮುನ್ನಯತಿ ಅಪಾನಂ ಪ್ರತ್ಯಗಸ್ಯತಿ .
ಮಧ್ಯೇ ವಾಮನಮಾಸೀನಂ ವಿಶ್ವೇ ದೇವಾ ಉಪಾಸತೇ ||೨-೨-೩||

ಇಲ್ಲಿ ಪ್ರಾಣ-ಅಪಾನ ಎನ್ನುವ ಪ್ರಾಣದೇವರ ಎರಡು ರೂಪ, ಮಧ್ಯದಲ್ಲಿ(ಹೃದಯದಲ್ಲಿ) ಭಗವಂತನ ವಾಮನ ರೂಪ. ಇದು ಪಂಚರೂಪಿ ಭಗವಂತನ ಉಪಾಸನೆಗಿಂತ ಭಿನ್ನವಾದ ಉಪಾಸನೆ. ಹೃದಯದ ಮಧ್ಯದಲ್ಲಿದ್ದು, ನಾವು ಉಂಡ ಆಹಾರವನ್ನು ಜೀರ್ಣಿಸಿ ಬದುಕು ಕೊಡುವವನು-ವಾಮನ ರೂಪಿ ಭಗವಂತ. ಈ ಮನ್ವಂತರದಲ್ಲಿ ವಾಮನ ದೇವೇಂದ್ರನ ರಕ್ಷಕನಾಗಿರುವ 'ಉಪೇಂದ್ರ'. ಆದ್ದರಿಂದ ನಮ್ಮ ಹೃದಯದಲ್ಲಿರುವ ವಾಮನ ರೂಪಿ ಭಗವಂತನ ಉಪಾಸನೆ ಈ ಮನ್ವಂತರದಲ್ಲಿ ಬಹಳ ಮುಖ್ಯವಾಗುತ್ತದೆ. ನಮ್ಮೊಳಗೆ ವಾಮನ ರೂಪಿಯಾಗಿರುವ ಈ ಭಗವಂತನೇ ತ್ರಿವಿಕ್ರಮನಾಗಿ ಭೂಮಿ-ವ್ಯೋಮದಲ್ಲಿ ತುಂಬಿರುವವನು.

ಸರ್ವಸ್ಯ ಚಾಹಂ ಹೃದಿ ಸನ್ನಿವಿಷ್ಟೋ ಮತ್ತಃ ಸ್ಮೃತಿರ್ಜ್ಞಾನಮಪೋಹನಂ ಚ ।
ವೇದೈಶ್ಚ ಸರ್ವೈರಹಮೇವ ವೇದ್ಯೋ ವೇದಾಂತಕೃದ್ ವೇದವಿದೇವ ಚಾಹಮ್ ॥೧೫॥

ಸರ್ವಸ್ಯ ಚ ಅಹಮ್ ಹೃದಿ ಸನ್ನಿವಿಷ್ಟಃ ಮತ್ತಃ ಸ್ಮೃತಿಃ ಜ್ಞಾನಮ್ ಅಪೋಹನಮ್ ಚ ।
ವೇದೈಃ ಚ ಸರ್ವೈಃ ಅಹಮ್ ಏವ ವೇದ್ಯಃ ವೇದಾಂತಕೃತ್ ವೇದವಿತ್ ಏವ ಚ ಅಹಮ್—ಎಲ್ಲಾ ಹೃದಯದಲ್ಲಿ ನಾನು ನೆಲೆಸಿರುವೆ. ನೆನಪು, ಅರಿವು, ಮರೆವು ಎಲ್ಲಾ ನನ್ನ ಕೊಡುಗೆ. ಎಲ್ಲಾ ವೇದಗಳಿಂದ ಅರಿಯಬೇಕಾದವನು ನಾನೇ. ವೇದಾಂತ ಸೂತ್ರಗಳ ನೊರೆದವನು, ವೇದಗಳ ಮರ್ಮವನ್ನರಿತವನು ನಾನೇ.

'ಸರ್ವಸ್ಯ ಚ ಅಹಮ್ ಹೃದಿ'- ಭಗವಂತ ಅಹಂ ಶಬ್ದ ವಾಚ್ಯನಾಗಿ ನಮ್ಮೊಳಗೆ ತುಂಬಿದ್ದಾನೆ. ನಮ್ಮ ಹೊರಗಿರುವ ಭಗವಂತನ ರೂಪಕ್ಕೆ 'ಅಹಃ' ಎಂದರೆ, ನಮ್ಮೊಳಗಿನ ಆತನ ರೂಪಕ್ಕೆ 'ಅಹಂ' ಎನ್ನುತ್ತಾರೆ. ನಮ್ಮೊಳಗಿರುವ ಭಗವಂತ ಸದಾ ನಮ್ಮೊಂದಿಗಿದ್ದು, ನಮ್ಮನ್ನು ರಕ್ಷಿಸುತ್ತಿರುತ್ತಾನೆ. ಸಾವಿನಲ್ಲಿ ಸ್ಥೂಲ ಶರೀರವನ್ನು ಬಿಟ್ಟು ಹೊರಹೋಗುವಾಗ ಕೂಡಾ ಭಗವಂತ ನಮ್ಮೊಂದಿಗಿರುತ್ತಾನೆ. ಆತ ನಮ್ಮನ್ನು ಒಂದು ಕ್ಷಣ ಬಿಟ್ಟಿರುವುದಿಲ್ಲ. ಆತನ ನೆಲೆ ನಮ್ಮ ಲಿಂಗಶರೀರದೊಳಗಿರುವ ಸ್ವರೂಪದ ಆತ್ಮ. ಈ ಆತ್ಮನೇ 'ಅಹಂ'. ಇಂತಹ ಭಗವಂತನ ಪ್ರಜ್ಞೆ ನಮಗಿದ್ದರೆ 'ನಾನು ಮಾಡಿದೆ' ಎನ್ನುವ ಅಹಂಕಾರ ನಮ್ಮನ್ನು ಕಾಡದು.

ಕಠೋಪನಿಷತ್ತಿನಲ್ಲಿ ಹೇಳುವಂತೆ: "ಅಂಗುಷ್ಠಮಾತ್ರಃ ಪುರುಷೋಽನ್ತರಾತ್ಮಾ ಸದಾ ಜನಾನಾಂ ಹೃದಯೇ ಸನ್ನಿವಿಷ್ಟಃ ..."|೨-೩-೭| ಎಲ್ಲಾ ಜೀವರ ಒಳಗೂ ಅಂಗುಷ್ಠಮಾತ್ರನಾಗಿ ಎಂದೆಂದೂ ದುಃಖದ ಲೇಪವಿಲ್ಲದೆ ನಿರ್ಲಿಪ್ತನಾಗಿ ಭಗವಂತ ತುಂಬಿದ್ದಾನೆ. ಮಧ್ವಾಚಾರ್ಯರು ಕಠೋಪನಿಷತ್ತಿಗೆ ಭಾಷ್ಯ ಬರೆಯುತ್ತ ಹೇಳುತ್ತಾರೆ:

ನಮೋ ಭಗವತೇ ತಸ್ಮೈ ಸರ್ವತಃ ಪರಮಾಯ ತೇ |
ಸರ್ವಪ್ರಾಣಿಹೃದಿಸ್ಥಾಯ ವಾಮನಾಯ ನಮೋ ನಮಃ ||ಸರ್ವಮೂಲ||

ಇಲ್ಲಿ-ಎಲ್ಲರ ಹೃದಯ ಅಂತರ್ಯಾಮಿಯಾಗಿರುವ ಭಗವಂತನ ರೂಪ 'ವಾಮನ' ರೂಪ ಎನ್ನುವ ಸುಳಿವು ನಮಗೆ ಸಿಗುತ್ತದೆ. ಆದ್ದರಿಂದ ಉಪಾಸನೆಯಲ್ಲಿ ನಾವು ನಮ್ಮ ಅಂತರ್ಗತ ಭಗವಂತನನ್ನು ವಾಮನ ರೂಪದಲ್ಲಿ ಉಪಾಸನೆ ಮಾಡಬೇಕು.

"ಮತ್ತಃ ಸ್ಮೃತಿರ್ಜ್ಞಾನಮಪೋಹನಂ"-ನಮಗೆ ಸ್ಮರಣಶಕ್ತಿಯನ್ನು ಕೊಡುವವನು ಆ ಭಗವಂತ. ಜ್ಞಾನ ಬರುವುದೂ ಭಗವಂತನಿಂದ, ಬಂದ ಜ್ಞಾನ ನೆನಪಿನಲ್ಲಿರುವುದೂ ಭಗವಂತನಿಂದ. ಕೇನೋಪನಿಷತ್ತಿನಲ್ಲಿ ಹೇಳುವಂತೆ: ಅಥಾಧ್ಯಾತ್ಮಂ ಯದ್ದೇತದ್ಗಚ್ಛತೀವ ಚ ಮನೋಽನೇನ ಚೈತದುಪಸ್ಮರತ್ಯಭೀಕ್ಷ್ಣಂ ಸಂಕಲ್ಪಃ || ೪-೫ || ನಮಗೆ ನೆನಪಿನ ಶಕ್ತಿಯನ್ನು ಕೊಡುವ ಭಗವಂತನ ಅನಿರುದ್ಧ ರೂಪದ ಉಪಾಸನೆ ಇದಾಗಿದೆ. ಹೇಗೆ ನೆನಪಿನ ಶಕ್ತಿ ಕೊಡುತ್ತಾನೋ ಹಾಗೇ ಮರೆಯುವಂತೆ ಮಾಡುವವನೂ ಅವನೇ! ಕೆಲವೊಮ್ಮೆ ಅಪರೋಕ್ಷ ಜ್ಞಾನಿಗಳೂ ಕೂಡಾ ಭಗವಂತನನ್ನು ಮರೆತುಬಿಡುತ್ತಾರೆ(ಭಗವಂತ ಮರೆಯುವಂತೆ ಮಾಡುತ್ತಾನೆ). ಇದಕ್ಕೆ ದೃಷ್ಟಾಂತ ಭಾಗವತದಲ್ಲಿ ಬರುವ ಗರ್ಗಾಚಾರ್ಯರ ಕಥೆ. ಭಗವಂತನಿಗೆ 'ಕೃಷ್ಣ' ಎಂದು ನಾಮಕರಣ ಮಾಡಿ, ಕೃಷ್ಣನ ಭಕ್ತರಾಗಿದ್ದ ಗರ್ಗಾಚಾರ್ಯರು, ಯಾವುದೋ ಒಂದು ಕೆಟ್ಟ ಸನ್ನಿವೇಶದಲ್ಲಿ ಎಲ್ಲವನ್ನೂ ಮರೆತು, 'ಕೃಷ್ಣನನ್ನು ಕೊಲ್ಲುವ ಮಗ ಹುಟ್ಟಬೇಕು' ಎಂದು ತಪಸ್ಸು ಮಾಡುತ್ತಾರೆ! ಎಂಥಾ ವಿಪರ್ಯಾಸ. ಆದರೆ ಇದೆಲ್ಲವೂ ಆ ಭಗವಂತನ ಲೀಲೆ. ಆತನ ಲೀಲೆಯ ಹಿಂದಿರುವುದು ದ್ವೇಷವಲ್ಲ-ಕೇವಲ ಕಾರುಣ್ಯ.

ಕೃಷ್ಣ ಹೇಳುತ್ತಾನೆ: " ಸಮಸ್ತ ವೇದಗಳಿಂದ ಅರಿಯಬೇಕಾದವನು ನಾನು" ಎಂದು. ವೇದದ ಪ್ರತಿಯೊಂದು ಪದವೂ ಭಗವದ್ ಪರವಾಗಿದೆ ಎನ್ನುವುದನ್ನು ಬ್ರಹ್ಮಸೂತ್ರ ಸ್ಪಷ್ಟವಾಗಿ ಹೇಳುತ್ತದೆ. ವೇದಾಂತ ಎಂದರೆ ಉಪನಿಷದ್ ಎಂದು ಕೆಲವರು ಹೇಳುವುದುಂಟು. ಆದರೆ ವೇದಾಂತ ಅಂದರೆ 'ವೇದದ ನಿರ್ಣಯ'-ಅದೇ ಬ್ರಹ್ಮಸೂತ್ರ. ಇದು ಸಮಸ್ತ ವೇದವನ್ನು ಸಮನ್ವಯ ಮಾಡಿ ಹೇಳುವ ಗ್ರಂಥ. ವೇದ ಅನಾದಿನಿತ್ಯ, ವೇದದ ಮರ್ಮವನ್ನು ಪೂರ್ಣ ತಿಳಿದವನು ಆ ಭಗವಂತನೊಬ್ಬನೆ.

"ವೇದೈಶ್ಚ ಸರ್ವೈರಹಮೇವ ವೇದ್ಯೋ" ಎನ್ನುವಲ್ಲಿ ಚ-ಕಾರವನ್ನು ಮತ್ತು ಏವ-ಕಾರವನ್ನು ಬಳಸಿದ್ದಾರೆ. ಇಲ್ಲಿ ಚ-ಕಾರದಿಂದಾಗಿ ಈ ಸಾಲು ಎರಡು ಸಂದೇಶವನ್ನು ಕೊಡುತ್ತದೆ. ಒಂದು ಮುಖ್ಯಾರ್ಥ ಇನ್ನೊಂದು ಅಮುಖ್ಯಾರ್ಥ.

'ಭಗವಂತ ವೇದಗಳಿಂದಲೇ ವೇದ್ಯ' ಎನ್ನುವುದು ಮುಖ್ಯಾರ್ಥ. ಪಂಚಮ ವೇದವೆನಿಸಿರುವ ಪುರಾಣ ಗ್ರಂಥಗಳು, ವೇದಾಂತ, ಮಹಾಭಾರತ, ರಾಮಾಯಣ ಇತ್ಯಾದಿಗಳಿಂದಲೂ ಭಗವಂತ ವೇದ್ಯ-ಎನ್ನುವುದು ಅಮುಖ್ಯಾರ್ಥ. ಇದಲ್ಲದೆ ಸ್ಮೃತಿಗಳಿವೆ-ಆದರೆ ಅದನ್ನು ಪ್ರಮಾಣವೆಂದು ಸ್ವೀಕಾರ ಮಾಡಲು ಸಾಧ್ಯವಿಲ್ಲ. ಏಕೆಂದರೆ ಸ್ಮೃತಿಗಳನ್ನು ಆಯಾ ಕಾಲದ ರಾಜರುಗಳು ತಮ್ಮ ವಿದ್ವಾಂಸರಿಂದ ಆಯಾ ಕಾಲಕ್ಕನುಗುಣವಾಗಿ ಬರೆಸಿದ್ದರಿಂದ, ಅವು ಸಂವಿಧಾನವಿದ್ದಂತೆ. ಅಲ್ಲಿ ಆಯಾಕಾಲದ ಸಮಾಜಧರ್ಮ ಜೊತೆಯಾಗಿ ಬಂದಿರುವುದರಿಂದ ಅದು ಸಾರ್ವಕಾಲಿಕ ಸತ್ಯವಾಗಿರಬೇಕೆಂದೇನೂ ಇಲ್ಲ. ಸಾರ್ವಕಾಲಿಕ ಸನಾತನ ಸತ್ಯ ವೇದ ಮಾತ್ರ.

"ಅಹಮೇವ ವೇದಃ" ಎನ್ನುವಲ್ಲಿ ವೇದಗಳಿಂದ ತಿಳಿಯಲ್ಪಡುವವನು ನಾನೊಬ್ಬನೇ ಎನ್ನುವುದು ಮುಖ್ಯಾರ್ಥ. ಅಮುಖ್ಯವಾಗಿ ಇದು ಭಗವಂತನ ಪಾರಮ್ಯಕ್ಕೆ ಪೂರಕವಾದ ವಿಷಯಗಳನ್ನೂ ಹೇಳುತ್ತದೆ. ಇಲ್ಲಿ "ವೇದಗಳಿಂದ ತಿಳಿಯಲ್ಪಡುವವನು ನಾನೊಬ್ಬನೇ" ಎಂದು ಹೇಳುವುದರ ಮೂಲಕ "ಬಹುದೇವತಾ ವಾದವನ್ನು ಕೃಷ್ಣ ತಳ್ಳಿಹಾಕಿದ. ಭಗವಂತ ಒಬ್ಬನೇ ಎನ್ನುವುದನ್ನು ವೇದ ಸಾರಿ ಹೇಳುತ್ತದೆ. ಇದಕ್ಕೆ ಬೇರೆ ಪ್ರಮಾಣ ಬೇಕಾಗಿಲ್ಲ.

"ವೇದಾಂತಕೃದ್ ವೇದವಿದೇವ ಚಾಹಮ್"ಎನ್ನುವಲ್ಲಿ ಕೃಷ್ಣ "ವೇದದ ಪೂರ್ಣ ಅರ್ಥ ತಿಳಿದಿರುವುದು ನನಗೊಬ್ಬನಿಗೇ" ಎಂದ. ಭಾಗವತದಲ್ಲಿ ಬರುವ ಉದ್ಧವಗೀತೆಯಲ್ಲಿ ಕೃಷ್ಣ ಹೇಳುತ್ತಾನೆ:

ಕಿಂ ವಿಧತ್ತೇ ಕಿಮಾಚಷ್ಟೇ ಕಿಮನೂದ್ಯ ವಿಕಲ್ಪಯೇತ್ ।
ಇತ್ಯಸ್ಯಾ ಹೃದಯಂ ಲೋಕೇ ನಾನ್ಯೋ ಮದ್ವೇದ ಕಶ್ಚನ ॥ ೧೧-೨೧-೪೨॥
ಮಾಂ ವಿಧತ್ತೇಽಭಿಧತ್ತೇ ಮಾಂ ವಿಕಲ್ಪ್ಯಾ ಪೋಹ್ಯತೇ ತ್ವಹಂ ।
ಏತಾವಾನ್ಸರ್ವವೇದಾರ್ಥಃ ಶಬ್ದ ಆಸ್ಥಾಯ ಮಾಂ ಭಿದಾಂ ।
ಮಾಯಾಮಾತ್ರಮನೂದ್ಯಾಂತೇ ಪ್ರತಿಷಿಧ್ಯ ಪ್ರಸೀದತಿ ॥೧೧-೨೧-೪೩॥

ವೇದದ ಪ್ರತಿಯೊಂದು ಶಬ್ದವೂ ಭಗವಂತನನ್ನು ಹೇಳುತ್ತದೆ ಎಂದು ಇಲ್ಲಿ ಕೃಷ್ಣ ಸ್ಪಷ್ಟವಾಗಿ ವಿವರಿಸಿದ್ದಾನೆ. ಆದರೆ ನಾವು ವೇದವನ್ನು ಮೇಲ್ನೋಟದಲ್ಲಿ ನೋಡಿದಾಗ- ವೇದ 'ಕರ್ಮ-ಬೋಧಕ', ಪ್ರತಿಯೊಂದು ಪದವೂ 'ಕರ್ಮವಾಚಕ' ಪದ ಎನ್ನುವಂತೆ ಕಾಣುತ್ತದೆ. ಆದರೆ ಆ ರೀತಿ ತಿಳಿಯುವುದು ತಪ್ಪು. ಕ್ರಿಯೆ ಮಾಡುವುದರಿಂದ ಮನಸ್ಸು ಸ್ವಚ್ಛವಾಗುತ್ತದೆ, ಶುದ್ಧ ಮನಸ್ಸಿಗೆ ಜ್ಞಾನ ಬಹುಬೇಗ ಹತ್ತುತ್ತದೆ. ಇದರಿಂದ ಭಗವಂತನನ್ನು ತಿಳಿಯಲು ಸಾಧ್ಯವಾಗುತ್ತದೆ. ಆದ್ದರಿಂದ ವೇದದಲ್ಲಿ ಬರುವ ಪ್ರತಿಯೊಂದು ಕ್ರಿಯೆಯೂ ಹೇಳುವುದು ಭಗವಂತನನ್ನು. ವೇದ ಒಂದು ಕಡೆ ಈ ಕ್ರಿಯೆ ಮಾಡು ಎಂದರೆ ಇನ್ನೊಂದು ಕಡೆ ಇನ್ನೊಂದು ಕ್ರಿಯೆಯನ್ನು ಮಾಡಬೇಡ ಎನ್ನುತ್ತದೆ. ಉದಾಹರಣೆಗೆ "ಸೋಮಪಾನ ಮಾಡು-ಸುರಪಾನ ಮಾಡಬೇಡ" ಎನ್ನುತ್ತದೆ ವೇದ. ಇದರ ಅರ್ಥ : ಸೋಮಪಾನ ಅಧ್ಯಾತ್ಮ ಚಿಂತನೆಗೆ ಮನಸ್ಸನ್ನು ಅಣಿಗೊಳಿಸುತ್ತದೆ, ಅದರಿಂದ ಭಗವಂತನನ್ನು ತಿಳಿಯಬಹುದು; ಸುರಪಾನ ಮಾಡಿದರೆ ಅದರಿಂದ ಬುದ್ಧಿ ಕೆಡುತ್ತದೆ ಅದು ಭಗವಂತನಿಂದ ನಮ್ಮನ್ನು ದೂರ ಮಾಡುತ್ತದೆ. ಹೀಗೆ ವೇದದಲ್ಲಿ ಹೇಳುವ ಪ್ರತಿಯೊಂದು ಕ್ರಿಯೆಯೂ ಅಂತತಃ ಭಗವಂತನನ್ನೇ ಹೇಳುತ್ತವೆ. ಕೆಲವು ಕಡೆ ವೇದ ಸೃಷ್ಟಿ-ಸಂಹಾರದ ಬಗ್ಗೆ ಹೇಳುತ್ತದೆ; ಸೃಷ್ಟಿಯ ಕ್ರಮವನ್ನು ಹೇಳುತ್ತದೆ. ಇದು "ಭಗವಂತ ಈ ರೀತಿ ಸೃಷ್ಟಿ ಕ್ರಿಯೆಯನ್ನು ಮಾಡುತ್ತಾನೆ" ಎಂದು ಭಗವಂತನನ್ನೇ ಹೇಳುವ ಸಾಲುಗಳು.

ವೇದ ಸೂಕ್ತಗಳು ಒಂದೊಂದು ಕಡೆ ಒಂದೊಂದು ದೇವತೆಗಳ ಹೆಸರನ್ನು ಹೇಳುತ್ತವೆ. ಒಂದು ಕಡೆ ಅಗ್ನಿ, ಇನ್ನೊಂದು ಕಡೆ ಇಂದ್ರ, ಮತ್ತೊಂದು ಕಡೆ ಸರಸ್ವತಿ, ಹೀಗೆ. ಇಲ್ಲಿ ನಮಗೆ ಇದು ಬಹುದೇವತಾ ವಾದವಾಗಿ ಕಾಣಬಹುದು. ಆದರೆ ಕೃಷ್ಣ ಹೇಳಿದ "ಅಭಿಧತ್ತೇ ಮಾಂ" ಎಂದು. ಉದಾಹರಣೆಗೆ "ಆತ್ಮನಃ ಆಕಾಶಃ ಸಂಭೂತಃ". ಅಹಂಕಾರ ತತ್ವದಿಂದ ಆಕಾಶ ದೇವತೆ-ಗಣಪತಿ ಹುಟ್ಟಿದ. ಆಕಾಶ ಸೃಷ್ಟಿ ಎಂದರೆ ಇದ್ದ ಅಂತರಿಕ್ಷದಲ್ಲಿ(Space), ಒಂದು ಆವರಣ(ವಾತಾವರಣ) ಸೃಷ್ಟಿ. ಅದರ ಅಭಿಮಾನಿ ದೇವತೆಯಾಗಿ ಗಣಪತಿ ಹುಟ್ಟಿದ. ಗಣಪತಿಯೊಳಗೆ ಆಕಾಶದಲ್ಲಿ ತುಂಬಿರುವ ಭಗವಂತ-ಆಕಾಶನಾಮಕನಾಗಿ ಅವತರಿಸಿದ. ಹೀಗೆ ಪ್ರತಿಯೊಂದು ವೇದ ಶ್ಲೋಕವೂ ಕೂಡಾ ಅಂತತಃ ಹೇಳುವುದು ಭಗವಂತನನ್ನು.

ವೇದದಲ್ಲಿ ಬರುವ ಪ್ರತಿಯೊಂದು ಶಬ್ದಗಳು ಭಗವಂತನನ್ನು ಹೇಗೆ ಹೇಳುತ್ತವೆ ಎನ್ನುವುದನ್ನು ಈ ಉದಾಹರಣೆಯಲ್ಲಿ ಕಾಣಬಹುದು. ಉದಾಹರಣೆ: 'ಅಗ್ನಿ'. ಅ+ಗ+ನಿ=ಅಗ್ನಿ. ಚಲನೆ ಇಲ್ಲದ ವಸ್ತುವಿಗೆ(ಅಗ) ಚಲನೆ ಕೊಡುವವನು-ಅಗ-ನಿ. ಭಗವಂತ ಇಡೀ ವಿಶ್ವಕ್ಕೆ ಚಲನೆ ಕೊಡುವವ ಆದ್ದರಿಂದ ಆತ ಅಗ್ನಿ.

ವೇದದಲ್ಲಿರುವ ಒಂದೊಂದು ಅಕ್ಷರವೂ ಭಗವಂತನ ನಾಮ(abbreviation). ಉದಾಹರಣೆಗೆ 'ಅ'. ಅ=ಅಜಃ(ಹುಟ್ಟಿಲ್ಲದವನು); ಅ=ಅನಂತಃ(ಸಾವಿಲ್ಲದವನು). ಹಾಗೇ 'ಆ'. ಆ=ಆದಿಃ(ಎಲ್ಲಕ್ಕಿಂತ ಮೊದಲಿದ್ದವನು); ಆ=ಆನಂದಃ; ಇತ್ಯಾದಿ. ವರಾಹ ಪುರಾಣದಲ್ಲಿ ವೇದವ್ಯಾಸರು ಹೇಳುತ್ತಾರೆ: "ಯಾವಂತಿ ಪಟಿಥಾನಿ ತಾವಂತಿ ಹರಿನಾಮಂತಿ ಪಟಿಥಾನಿ ನಾಸಂಶಯಹ" ಎಂದು. ಋಗ್ವೇದದಲ್ಲಿ 4 ಲಕ್ಷದ 32 ಸಾವಿರ ಅಕ್ಷರಗಳಿವೆ. ಆದ್ದರಿಂದ ಪ್ರಾಚೀನರ ಪ್ರಕಾರ ಒಮ್ಮೆ ಋಗ್ವೇದ ಓದಿದರೆ 4 ಲಕ್ಷದ 32 ಸಾವಿರ ಭಗವಂತನ ನಾಮವನ್ನು ಹೇಳಿದ ಹಾಗಾಗುತ್ತದೆ. ಒಟ್ಟಿನಲ್ಲಿ ವೇದದ ಅಕ್ಷರದಿಂದ ಭಗವಂತನನ್ನು ಕಾಣುವುದು; ಪದದಿಂದ ಭಗವಂತನನ್ನು ಕಾಣುವುದು; ವಾಕ್ಯದಿಂದ ಭಗವಂತನನ್ನು ಕಾಣುವುದು ಮತ್ತು ಪ್ರಕರಣದಲ್ಲಿ ಭಗವಂತನನ್ನು ಕಾಣುವುದು. ಹೀಗೆ ವೇದವನ್ನು ಬಿಡಿಸಿ ನೋಡಿದಾಗ ಮಾತ್ರ ನಮಗೆ ಅಲ್ಲಿರುವ ಸಂದೇಶ ತಿಳಿಯುತ್ತದೆ. ಇಲ್ಲದಿದ್ದರೆ ಎಲ್ಲವೂ ಲೌಕಿಕವಾಗಿ ಕಾಣುತ್ತದೆ. ಆದರೆ ಎಲ್ಲವನ್ನೂ ನಾವು ತಿಳಿಯಲು ಸಾಧ್ಯವಿಲ್ಲ(ನಾನ್ಯೋ ಮದ್ವೇದ ಕಶ್ಚನ). ಅದನ್ನು ಪೂರ್ಣವಾಗಿ ತಿಳಿದವನು ಆ ಭಗವಂತನೊಬ್ಬನೇ.

ಮುಂದಿನ ಮೂರು ಶ್ಲೋಕಗಳು ಭಾರತೀಯ ತತ್ವಶಾಸ್ತ್ರದ ಚಿಂತನಾಕ್ರಮದ ಸಾರ. ಇವು ವಿಶ್ವ ಮತ್ತು ವಿಶ್ವಾತ್ಮನ ಅನುಸಂಧಾನವನ್ನು ವಿವರಿಸುವ ಶ್ಲೋಕಗಳು.

ದ್ವಾವಿಮೌ ಪುರುಷೌ ಲೋಕೇ ಕ್ಷರಶ್ಚಾಕ್ಷರ ಏವ ಚ ।
ಕ್ಷರಃ ಸರ್ವಾಣಿ ಭೂತಾನಿ ಕೂಟಸ್ಥೋಽಕ್ಷರ ಉಚ್ಯತೇ ॥೧೬॥

ದ್ವಾವಿಮೌ ಪುರುಷೌ ಲೋಕೇ ಕ್ಷರಃ ಚ ಅಕ್ಷರಃ ಏವ ಚ ।
ಕ್ಷರಃ ಸರ್ವಾಣಿ ಭೂತಾನಿ ಕೂಟಸ್ಥಃ ಅಕ್ಷರಃ ಉಚ್ಯತೇ—ಲೋಕದಲ್ಲಿ ಈ ಎರಡು ಬಗೆಯ ಪುರುಷರು: ಕ್ಷರಪುರುಷ ಮತ್ತು ಅಕ್ಷರಪುರುಷ. ಬ್ರಹ್ಮಾದಿ ಸಮಸ್ತ ಜೀವರೂ ಕ್ಷರಪುರುಷರು. ಈ ಚರಾಚರದ ಕೂಟವನ್ನು ಕೂಡಿಸಿಟ್ಟ ಚಿತ್ ಪ್ರಕೃತಿಯೇ ಅಕ್ಷರ ಪುರುಷಳೆನ್ನಿಸಿದ್ದಾಳೆ.

ಈ ಚೇತನಾ ಪ್ರಪಂಚದಲ್ಲಿ ಎರಡು ಬಗೆಯ ಪುರುಷರಿದ್ದಾರೆ. ಒಂದು ಕ್ಷರಪುರುಷ ಮತ್ತು ಇನ್ನೊಂದು ಅಕ್ಷರಪುರುಷ. [ಇಲ್ಲಿ ಪುರುಷ ಎಂದರೆ ಗಂಡಸು ಎನ್ನುವ ಅರ್ಥವಲ್ಲ. ಈ ಬಗ್ಗೆ ವಿಶೇಷವಾಗಿ ಹಿಂದೆ ಅನೇಕ ಬಾರಿ ಚರ್ಚಿಸಿದ್ದೇವೆ]. ಒಂದು ದಿನ ಬಿದ್ದುಹೋಗುವ ಶರೀರ ಉಳ್ಳವರು ಕ್ಷರಪುರುಷರು. ಬ್ರಹ್ಮಾದಿ ಸಮಸ್ತ ಜೀವರೂ ಕೂಡಾ ಕ್ಷರಪುರುಷರು. ಬ್ರಹ್ಮಾದಿ ಸಮಸ್ತ ದೇವತೆಗಳೂ ಕೂಡಾ ಮೋಕ್ಷವನ್ನು ಸೇರುವಾಗ ತಮ್ಮ ಶರೀರ ಸಮೇತರಾಗಿ ಹೋಗುವಂತಿಲ್ಲ. ಚತುರ್ಮುಖ ಬ್ರಹ್ಮನ ಆಯುಸ್ಸು ಒಂದು ಕಲ್ಪ(೩೧,೧೦೪ ಸಾವಿರ ಕೋಟಿ ಮಾನವ ವರ್ಷ). ಆ ನಂತರ ಆತನ ಶರೀರ ಕೂಡಾ ಬಸ್ಮವಾಗುತ್ತದೆ. ಇದನ್ನು ಈಶೋಪನಿಷತ್ತಿನಲ್ಲಿ ಹೀಗೆ ವಿವರಿಸಿದ್ದಾರೆ: "ವಾಯುರನಿಲಮ್ ಅಮೃತಮ್ ಅಥೇದಂ ಭಸ್ಮಾಂತಂ ಶರೀರಂ || ೧೭||". "ಭಗವಂತನಿಗೆ ಅಧಿಷ್ಠಾನವಾಗಿ ನಿಂತಿರುವ ಪ್ರಾಣ ದೇವರು ಅಮೃತರು. ಆದರೂ ಕೂಡಾ, ಒಂದು ದಿನ ಅವರ ದೇಹ ಬಸ್ಮವಾಗಲೇ ಬೇಕು" ಎಂದು. ಹೀಗೆ ಸಮಸ್ತ ದೇವತೆಗಳು, ಜೀವಜಾತಗಳು-ಕ್ಷರಪುರುಷರು.

ನಾಶವಿಲ್ಲದ ಜ್ಞಾನಾನಂದಮಯ ಸ್ವರೂಪಭೂತವಾದ ದೇಹವುಳ್ಳ ಶ್ರೀಲಕ್ಷ್ಮಿ ಅಕ್ಷರಪುರುಷಳು. ಸಮಸ್ತ ಕ್ಷರಪುರುಷರೂ ಮೋಕ್ಷದಲ್ಲಿ ಅಕ್ಷರರಾಗುತ್ತಾರೆ. ಆದರೆ ಲಕ್ಷ್ಮಿ ಸದಾ ಅಕ್ಷರಳು. ಇಲ್ಲಿ ಲಕ್ಷ್ಮಿಯನ್ನು ಕೂಟಸ್ಥಳು ಎಂದು ವರ್ಣಿಸಿದ್ದಾರೆ. ಕೂಟ ಎಂದರೆ 'ಕೂಡುವುದು'. ಜೀವ ಮತ್ತು ಶರೀರದ ಕೂಡುವಿಕೆಗೆ ಕಾರಣಳಾದವಳು ತಾಯಿ-ಶ್ರೀಲಕ್ಷ್ಮಿ. ಸದಾ ನಿರ್ಲಿಪ್ತಳಾಗಿ, ಯಾವುದೇ ಲೇಪವಿಲ್ಲದೆ, ಪ್ರಪಂಚವನ್ನು ವ್ಯವಸ್ಥೆಗೊಳಿಸಿದ ಶಕ್ತಿ – ಜಗನ್ಮಾತೆ ಶ್ರೀಲಕ್ಷ್ಮಿ. ಇವಳು ಅಕ್ಷರಪುರುಷಳು.

ಉತ್ತಮಃ ಪುರುಷಸ್ತ್ವನ್ಯಃ ಪರಮಾತ್ಮೇತ್ಯುದಾಹೃತಃ ।
ಯೋ ಲೋಕತ್ರಯಮಾವಿಶ್ಯ ಬಿಭರ್ತ್ಯವ್ಯಯ ಈಶ್ವರಃ ॥೧೭॥

ಉತ್ತಮಃ ಪುರುಷಃ ತು ಅನ್ಯಃ ಪರಮ ಆತ್ಮಾ ಇತಿ ಉದಾಹೃತಃ ।
ಯಃ ಲೋಕತ್ರಯಮ್ ಆವಿಶ್ಯ ಬಿಭರ್ತಿ ಅವ್ಯಯಃ ಈಶ್ವರಃ –ಈ ಎರಡಕ್ಕೂ ಮಿಗಿಲಾದವನು ಪುರುಷೋತ್ತಮ. ಅವನನ್ನೇ ಪರಮಾತ್ಮ ಎನ್ನುತ್ತಾರೆ. ಅಳಿವಿರದ ಆ ಪರಮೇಶ್ವರನೇ ಮೂರು ಲೋಕದೊಳಗಿದ್ದು ಸಲಹುತ್ತಾನೆ.

ಕ್ಷರ ಮತ್ತು ಅಕ್ಷರವನ್ನು ಮೀರಿ ನಿಂತಿರುವ ಪರಮಪುರುಷ ಆ ಭಗವಂತ. ಅವನನ್ನೇ 'ಪರಮಾತ್ಮ' ಎಂದು ಕರೆಯುತ್ತಾರೆ. ಯಾರು ಈ ಮೂರು ಲೋಕದೊಳಗೆ, (ಭೂಃ ಭುವಃ ಸ್ವಃ ಅಥವಾ ಇಡೀ ಬ್ರಹ್ಮಾಂಡ-ಇದನ್ನು ಏಳು ಅಥವಾ ಹದಿನಾಲ್ಕು ಲೋಕವನ್ನಾಗಿಯೂ ವಿಭಾಗ ಮಾಡಿ ಹೇಳುತ್ತಾರೆ.) ತುಂಬಿ ಧಾರಣೆ ಮಾಡಿ ರಕ್ಷಿಸುತ್ತಿದ್ದಾನೋ ಅವನು ಸರ್ವಶಕ್ತ(ಈಶ್ವರ)ನಾದ ಭಗವಂತ.

ಯಸ್ಮಾತ್ ಕ್ಷರಮತೀತೋSಹಮಕ್ಷರಾದಪಿ ಚೋತ್ತಮಃ ।
ಅತೋSಸ್ಮಿ ಲೋಕೇ ವೇದೇ ಚ ಪ್ರಥಿತಃ ಪುರುಷೋತ್ತಮಃ ॥೧೮॥

ಯಸ್ಮಾತ್ ಕ್ಷರಮ್ ಅತೀತಃ ಅಹಮ್ ಅಕ್ಷರಾತ್ ಅಪಿ ಚ ಉತ್ತಮಃ ।
ಅತಃ ಅಸ್ಮಿ ಲೋಕೇ ವೇದೇ ಚ ಪ್ರಥಿತಃ ಪುರುಷ ಉತ್ತಮಃ –ನಾನು ಕ್ಷರವನ್ನು ಮೀರಿನಿಂತವನು. ಅಕ್ಷರಕ್ಕಿಂತಲೂ ಹಿರಿಯನು. ಅದಕೆಂದೇ ಲೋಕದಲ್ಲೂ ವೇದದಲ್ಲೂ 'ಪುರುಷೋತ್ತಮ' ಎಂದೇ ಹೆಸರಾಗಿದ್ದೇನೆ.

ಹಿಂದಿನ ಶ್ಲೋಕದಲ್ಲಿ "ಯಾರು ಕ್ಷರಾಕ್ಷರಗಳಿಂದ ಅತೀತನೋ ಅವನು ಪುರುಷೋತ್ತಮ" ಎಂದು ಹೇಳಿದ ಕೃಷ್ಣ, ಇಲ್ಲಿ ನೇರವಾಗಿ "ಆ ಬೇರೆಯಾದ ಪುರುಷೋತ್ತಮ ನಾನೇ" ಎಂದು ಸ್ಪಷ್ಟವಾಗಿ ಹೇಳುತ್ತಾನೆ. ಮಧ್ವಾಚಾರ್ಯರು ವಿಷ್ಣುತತ್ವ ನಿರ್ಣಯದ ಮಂಗಳಾಚರಣೆಯಲ್ಲಿ ಹೇಳುತ್ತಾರೆ: "ಸದಾಗಮೈಕ ವಿಜ್ಞೇಯಂ, ಸಮತೀತ ಕ್ಷರಾಕ್ಷರಂ, ನಾರಾಯಣಂ ಸದಾ ವಂದೇ, ನಿರ್ದೋಷ ಅಶೇಷ ಸದ್ಗುಣಂ" ಎಂದು. ಇಲ್ಲಿ ಕ್ಷರ ಮತ್ತು ಅಕ್ಷರದಿಂದ ಅತೀತನಾದ ಭಗವಂತನನ್ನು ಅವರು "ಸಮತೀತ ಕ್ಷರಾಕ್ಷರಂ" ಎಂದು ಕರೆದಿದ್ದಾರೆ.
ಈ ಶ್ಲೋಕದಲ್ಲಿ ಕ್ಷರದಿಂದ ಅತೀತ ಮತ್ತು ಅಕ್ಷರದಿಂದ ಉತ್ತಮ ಎಂದಿದೆ. ಇಲ್ಲಿ ಅತೀತ ಎಂದರೆ ಉತ್ತಮ. ಆದರೂ ಅತೀತ ಮತ್ತು ಉತ್ತಮ ಎಂದು ಎರಡು ಪದ ಬಳಕೆ ಮಾಡಿದ್ದಾರೆ. ಇದು ಒಂದು ವಿಶೇಷ ಅರ್ಥವನ್ನು ಕೊಡುತ್ತದೆ. ಕ್ಷರಪುರುಷನ ಅಸ್ತಿತ್ವದ ವ್ಯಾಪ್ತಿ ಈ ಬ್ರಹ್ಮಾಂಡದ ಒಳಗೆ. ಆದರೆ ಲಕ್ಷ್ಮೀ ನಾರಾಯಣರು ಈ ಬ್ರಹ್ಮಾಂಡವನ್ನು ಮೀರಿ ನಿಂತವರು. ಇದನ್ನು 'ಅತೀತ' ಪದ ವಿವರಿಸುತ್ತದೆ. ಭಗವಂತ ಅಕ್ಷರಳಾದ ಲಕ್ಷ್ಮಿಗಿಂತಲೂ ಉತ್ತಮ. ಈ ಶ್ಲೋಕದಲ್ಲಿ 'ಅಪಿ' ಮತ್ತು 'ಚ-ಕಾರವನ್ನು' ಒಟ್ಟಿಗೆ ಬಳಸಲಾಗಿದೆ. ಇದು ಭಗವಂತನ ಸರ್ವಶ್ರೇಷ್ಠತ್ವವನ್ನು ಹೇಳುತ್ತದೆ. ಆತನಿಗಿಂತ ಶ್ರೇಷ್ಠವಾದ ತತ್ವ ಇನ್ನೊಂದಿಲ್ಲ.
ಪುರುಷೋತ್ತಮ ಪದದ ಎಲ್ಲಾ ಮುಖದ ಅರ್ಥ ಕೇವಲ ಭಗವಂತನಲ್ಲಿ ಮಾತ್ರ ಅನ್ವಯವಾಗುತ್ತದೆ. ಕೃಷ್ಣ ಹೇಳುತ್ತಾನೆ: "ಲೋಕದಲ್ಲಿ ಮತ್ತು ವೇದದಲ್ಲಿ ಪುರುಷೋತ್ತಮ ಎಂದು ಕರೆದಿರುವುದು ನನ್ನನ್ನು" ಎಂದು. ಇಲ್ಲಿ ಲೋಕ ಎಂದರೆ ಪೌರುಷೇಯವಾದ ಪುರಾಣ ಗ್ರಂಥಗಳು. ಉದಾಹರಣೆಗೆ: ರಾಮಾಯಣ, ಮಹಾಭಾರತ, ಪಂಚರಾತ್ರ, ಪುರಾಣ, ಇತ್ಯಾದಿ. ಹೀಗೆ "ಪುರುಷೋತ್ತಮ" ಎನ್ನುವುದು ಪರಮ ಮುಖ್ಯವಾಗಿ ಕೇವಲ ಭಗವಂತನಿಗೆ ಮಾತ್ರ ಅನ್ವಯ.

ಯೋ ಮಾಮೇವಮಸಮ್ಮೂಢೋ ಜಾನಾತಿ ಪುರುಷೋತ್ತಮಮ್ ।
ಸ ಸರ್ವವಿದ್ ಭಜತಿ ಮಾಂ ಸರ್ವಭಾವೇನ ಭಾರತ ॥೧೯॥

ಯಃ ಮಾಮ್ ಏವಮ್ ಅಸಮ್ಮೂಢಃ ಜಾನಾತಿ ಪುರುಷೋತ್ತಮಮ್ ।
ಸಃ ಸರ್ವವಿತ್ ಭಜತಿ ಮಾಮ್ ಸರ್ವಭಾವೇನ ಭಾರತ –ಭ್ರಾಂತಿಯಳಿದು, ಹೀಗೆ ನನ್ನನ್ನು ಪುರುಷೋತ್ತಮನೆಂದು ತಿಳಿದವನು ಎಲ್ಲವನ್ನೂ ತಿಳಿದವನು. ಓ ಭಾರತಾ, ಎಲ್ಲಾ ಬಗೆಯಿಂದಲೂ ಅವನು ನನ್ನನ್ನೇ ಆರಾಧಿಸುತ್ತಾನೆ.

ಇಲ್ಲಿ ಹೇಳಿರುವ ವಿಚಾರಗಳನ್ನು ತಿಳಿದು ನಮಗೇನು ಲಾಭ ಎಂದು ಪ್ರಶ್ನೆ ಮಾಡುವವರಿಗೆ ಕೃಷ್ಣನ ಉತ್ತರ ಈ ಶ್ಲೋಕದಲ್ಲಿದೆ. ಕೃಷ್ಣ ಹೇಳುತ್ತಾನೆ: "ನನ್ನನ್ನು ಪುರುಷೋತ್ತಮ ಎಂದು ಅಹಂಕಾರವಿಲ್ಲದೆ, ಸ್ವಚ್ಛವಾದ ಮನಸ್ಸಿನಿಂದ, ಕೋಪವನ್ನು ಗೆದ್ದು, ಮೋಹವಳಿದು ತಿಳಿದವನು- ಎಲ್ಲವನ್ನೂ ತಿಳಿದವನು" ಎಂದು. ನಮಗೆ

ಭಗವಂತನ ಅಸ್ತಿತ್ವ ಅರ್ಥವಾಗಬೇಕಾದರೆ ಮೊದಲು ಜಡಕ್ಕಿಂತ ಭಿನ್ನವಾದ 'ನಾನು' ಎನ್ನುವ ಚೇತನ ಈ ದೇಹದಲ್ಲಿದೆ ಎಂದು ಅರ್ಥವಾಗಬೇಕು(**awareness of self**). ಹೀಗೆ ಆತ್ಮಸಾಕ್ಷಾತ್ಕಾರವಾದ ಮೇಲೆ, ಭಗವಂತನ ಬಿಂಬ ಸಾಕ್ಷಾತ್ಕಾರವಾಗುತ್ತದೆ. ಯಾರು ಭಗವಂತನನ್ನು ತಿಳಿಯುತ್ತಾನೋ, ಅವನು ಎಲ್ಲವನ್ನೂ ತಿಳಿಯಬಲ್ಲ. ಹೀಗಾಗಿ ನಾವು ಪ್ರಾಣಿಗಳಿಗಿಂತ ಬಿನ್ನವಾಗಿ ಜ್ಞಾನಿಗಳಾಗಿ ಬದುಕಬೇಕು. ಹೀಗೆ ಬದುಕಿದಾಗ ನಮಗೆ ದೇವರ ಮೇಲಿನ ಅಚಲ ಭಕ್ತಿ ಗಟ್ಟಿಗೊಳ್ಳುತ್ತದೆ. ಜ್ಞಾನಿ ಎನಿಸಿದವ ತನ್ನ ಸರ್ವಸ್ವವನ್ನು ಕಳೆದುಕೊಂಡರೂ ಕೂಡಾ, 'ಅದು ಭಗವಂತನ ಕರುಣೆ' ಎಂದು ಸ್ವೀಕರಿಸುತ್ತಾನೆ. ಅಜ್ಞಾನಿಯಲ್ಲಿ ಈ ದೃಢ ಭಕ್ತಿ ಇರದು. ಈ ರೀತಿ ದೃಢಭಕ್ತಿ ಮೂಡಬೇಕಾದರೆ ನಾವು 'ಭಾರತ'ರಾಗಬೇಕು. ನಿರಂತರ ಜ್ಞಾನ ತೃಷೆ, ಜ್ಞಾನಿಗಳಲ್ಲಿ ಭಕ್ತಿ, ಭಗವದ್ ಭಕ್ತರಲ್ಲೇ ಹಿರಿಯರಾದ ಪ್ರಾಣದೇವರಲ್ಲಿ ಭಕ್ತಿ- ನಮ್ಮನ್ನು ಭಾರತರನ್ನಾಗಿ ಮಾಡಬಲ್ಲದು.

ಇತಿ ಗುಹ್ಯತಮಂ ಶಾಸ್ತ್ರಮಿದಮುಕ್ತಂ ಮಯಾಽನಘ ।
ಏತದ್ ಬುದ್ಧ್ವಾ ಬುದ್ಧಿಮಾನ್ ಸ್ಯಾತ್ ಕೃತ ಕೃತ್ಯಃ ಚ ಭಾರತ ॥೨೦॥

ಇತಿ ಗುಹ್ಯತಮಮ್ ಶಾಸ್ತ್ರಮ್ ಇದಮ್ ಉಕ್ತಮ್ ಮಯಾ ಅನಘ ।
ಏತತ್ ಬುದ್ಧ್ವಾ ಬುದ್ಧಿಮಾನ್ ಸ್ಯಾತ್ ಕೃತಕೃತ್ಯಶ್ಚ ಭಾರತ—ಓ ಅನಘ, ತುಂಬಾ ಮುಚ್ಚಿಡಬೇಕಾದ ಮಾತನ್ನು ನಾನು ನಿನ್ನೆದುರು ಬಿಚ್ಚಿಟ್ಟಿದ್ದೇನೆ. ಇದನ್ನರಿತವನು ಭಗವಂತನನ್ನು ಬಲ್ಲವನಾಗುತ್ತಾನೆ. ಅವನು ಮತ್ತೆ ಮಾಡಬೇಕಾದ್ದೇನೂ ಉಳಿಯುವುದಿಲ್ಲ.

ಇದು ಅಧ್ಯಾತ್ಮ ಜಿಜ್ಞಾಸುಗಳಿಗೆ ಹೇಳಬೇಕಾದ ರಹಸ್ಯಗಳಲ್ಲೇ ಸರ್ವಶ್ರೇಷ್ಠ ರಹಸ್ಯ. ಅಧ್ಯಾತ್ಮವನ್ನು ಆಸಕ್ತಿ ಉಳ್ಳವರಿಗೆ ಅವರ ಆಸಕ್ತಿಯ ಆಳವನ್ನು ತಿಳಿದು ಹೇಳಬೇಕು. ಶಾಸ್ತ್ರದ ಪ್ರಮೇಯವನ್ನು ಎಂದೂ ಬೀದಿಯಲ್ಲಿ ತೆರೆದಿಡಬಾರದು. ಏಕೆಂದರೆ ಅದು ವ್ಯರ್ಥವಾಗಬಾರದು ಮತ್ತು ಅನರ್ಥವಾಗಲೂಬಾರದು. ಯಾರಿಗೆ ಗ್ರಹಣ ಮಾಡುವ ಯೋಗ್ಯತೆ ಇದೆ, ಆಸಕ್ತಿ, ಶ್ರದ್ಧೆ, ಭಕ್ತಿ ಇದೆ, ಅವರಿಗೆ ಮಾತ್ರ ಹೇಳಬೇಕು. ಇದು ರಹಸ್ಯಗಳಲ್ಲೇ ಅತ್ಯಂತ ಗೋಪ್ಯವಾದುದು. ಕ್ಷರಪುರುಷರ ಜ್ಞಾನ, ಅಕ್ಷರಪುರುಷಳ ಜ್ಞಾನ ಮತ್ತು ಪುರುಷೋತ್ತಮನ ಜ್ಞಾನವನ್ನು ತಿಳಿದವನು ಶಾಸ್ತ್ರವನ್ನು ಬಲ್ಲವನು. ಶಾಸ್ತ್ರ ಎಂದರೆ ತಿಳಿದವರು ತಿಳಿಯದವರಿಗೆ ತಿಳಿಹೇಳಬೇಕಾದ ವಸ್ತು. "ಬಹಳ ರಹಸ್ಯವಾಗಿ, ಜೋಪಾನವಾಗಿ ಕಾಪಾಡಬೇಕಾದ ಉಪದೇಶಾರ್ಹ ವಿಷಯವಿದು. ಇದಕ್ಕಿಂತ ಶ್ರೇಷ್ಠವಾದ ಉಪದೇಶ ಇನ್ನೊಂದಿಲ್ಲ. ಅಂತಹ ಗೋಪ್ಯವಾದ ವಿಷಯವನ್ನು ನಿನಗೆ ಹೇಳಿದೆ-ಏಕೆಂದರೆ ನೀನು 'ಅನಘ' ಅದಕ್ಕಾಗಿ'" ಎನ್ನುತ್ತಾನೆ ಕೃಷ್ಣ. 'ಅನಘ' ಎಂದರೆ ಯಾವ ದೋಷವೂ ಇಲ್ಲದವ. ನಾವು ಜ್ಞಾನಕ್ಕೆ ಭಾದಕವಾಗಿರುವ ದುರಿತಗಳಿಂದ, ದೋಷಗಳಿಂದ ಮೊದಲು ಮುಕ್ತರಾಗಬೇಕು. ನಮ್ಮ ಮನಸ್ಸು ಕೆಟ್ಟ ವಿಚಾರದಿಂದ ಕಲುಷಿತವಾದರೆ ಆಗ ನಮಗೆ ಗೀತೆ ಅರ್ಥವಾಗುವುದಿಲ್ಲ. ಯಾವುದೇ ಪೂರ್ವಾಗ್ರಹ ಆವೇಶಗಳಿಲ್ಲದೆ ಪೂರ್ಣ ಭಗವಂತನಲ್ಲಿ ಶರಣಾದಾಗ ಮನಸ್ಸು ಪಾಪ ರಹಿತವಾಗಬಲ್ಲದು.

**ಕೃಷ್ಣ ಹೇಳುತ್ತಾನೆ: "ಇದು ಎಲ್ಲಾ ತಿಳುವಳಿಕೆಗಳ ಬೇರು. ಇದನ್ನು ತಿಳಿದವನು ಕೃತಕೃತ್ಯ" ಎಂದು. ಜೀವನದಲ್ಲಿ ಭಗವಂತನನ್ನು ತಿಳಿದವನು ಸಾರ್ಥಕವಾದ ಬದುಕನ್ನು ಬದುಕಬಲ್ಲ. ಭಗವಂತನ ಅರಿವಿನೊಂದಿಗೆ ಬದುಕುವುದೇ ಜೀವನದ ಸಾರ್ಥಕ್ಯ.**

**ಇತಿ ಪಂಚದಶೋಽಧ್ಯಾಯಃ**

**ಹದಿನೈದನೆಯ ಅಧ್ಯಾಯ ಮುಗಿಯಿತು**



# ಅಧ್ಯಾಯ ಹದಿನಾರು

ಹಿಂದಿನ ಅಧ್ಯಾಯದ ಕೊನೆಯಲ್ಲಿ ನಾವು 'ಅನಘ'ರಾಗಬೇಕು, 'ಭಾರತ'ರಾಗಬೇಕು-ಎನ್ನುವ ಸಂದೇಶವನ್ನು ಕೊಟ್ಟ ಕೃಷ್ಣ, ಈ ಅಧ್ಯಾಯದಲ್ಲಿ ಭಗವಂತನ ಸಾಧನೆ ಮಾಡುವವರಲ್ಲಿ ಇರಬೇಕಾದ ಗುಣಗಳ ಬಗ್ಗೆ ವಿವರಿಸುತ್ತಾನೆ. ಇಲ್ಲಿ ಕೃಷ್ಣ 'ದೈವೀಸ್ವಭಾವ' ಮತ್ತು 'ಆಸುರೀಸ್ವಭಾವ' ಹಾಗೂ ಅದರ ಗುಣಲಕ್ಷಣಗಳನ್ನು ಸ್ಪಷ್ಟವಾಗಿ ನಮ್ಮ ಮುಂದೆ ತೆರೆದಿಟ್ಟಿದ್ದಾನೆ. ದೈವೀಸ್ವಭಾವ ಎಂದರೆ ದೇವತೆಗಳ ಸ್ವಭಾವ-ಇದು ಜ್ಞಾನ ಸಾಧನ. ಆಸುರೀಸ್ವಭಾವ ಎಂದರೆ ಅಸುರರ ಸ್ವಭಾವ-ಅದು ಜ್ಞಾನ ವಿರೋಧಿ. ದೈವೀ ಸ್ವಭಾವವನ್ನು ನಾವು ನಮ್ಮ ಜೀವನದಲ್ಲಿ ಅಳವಡಿಸಿಕೊಂಡರೆ ಜ್ಞಾನ ಸಾಧನೆ ಸಾಧ್ಯ. ಅದನ್ನು ಬಿಟ್ಟು ಆಸುರ ಸ್ವಭಾವವನ್ನು ಅಳವಡಿಸಿಕೊಂಡರೆ ಅದು ನಮ್ಮನ್ನು ಅಜ್ಞಾನದ ದಾರಿಯಲ್ಲಿ ಕೊಂಡೊಯ್ಯುತ್ತದೆ. ಒಂದು ಬೆಳಕಿನ ದಾರಿಯಾದರೆ ಇನ್ನೊಂದು ಕತ್ತಲಿನ ದಾರಿ. ಯಾವ ದಾರಿಯಲ್ಲಿ ನಡೆಯಬೇಕು ಎನ್ನುವ ತೀರ್ಮಾನ ನಮಗೆ ಬಿಟ್ಟಿದ್ದು. ನಮಗೆ ಬೆಳಕಿನ ದಾರಿ ಬೇಕಿದ್ದರೆ, ಆ ದಾರಿಯಲ್ಲಿ ಸಾಗಲು ಬೇಕಾದ ನಡೆಯನ್ನು ಈ ಅಧ್ಯಾಯ ತಿಳಿಸುತ್ತದೆ. ಅದೇ ರೀತಿ ಕತ್ತಲೆಯ ದಾರಿಯಲ್ಲಿ ಸಾಗುವವರ ಬುದ್ಧಿ ಹೇಗಿರುತ್ತದೆ ಎನ್ನುವುದನ್ನೂ ಇಲ್ಲಿ ವಿವರಿಸಲಾಗಿದೆ. ಇಲ್ಲಿ ದೈವೀ ಮತ್ತು ಆಸುರೀ ಸ್ವಭಾವವನ್ನು ಬಿಟ್ಟು ಬೇರೆಯಾಗಿ ಮಾನವ ಸ್ವಭಾವವನ್ನು ವಿವರಿಸಿಲ್ಲ. ಏಕೆಂದರೆ ಮಾನವ ಸ್ವಭಾವ ಈ ಎರಡೂ ಸ್ವಭಾವದ ಮಿಶ್ರಣ. ಈ ಮಿಶ್ರಣದಲ್ಲಿನ ಪ್ರಮಾಣಭೇದದಿಂದ ಮಾನವರಲ್ಲಿ ವೈವಿಧ್ಯತೆ ಬರುತ್ತದೆ. ಒಟ್ಟಿನಲ್ಲಿ ಇರುವುದು ಎರಡೇ ದಾರಿ. ಬೆಳಕಿನ ದಾರಿ ನಮ್ಮನ್ನು ಭಗವಂತನೆಡೆಗೆ ಕೊಂಡೊಯ್ಯುತ್ತದೆ; ಕತ್ತಲಿನ ದಾರಿ ನಾವು ಭಗವಂತನಿಗೆ ಬೆನ್ನುಹಾಕಿ ನಡೆಯುವಂತೆ ಮಾಡುತ್ತದೆ.

ಭಗವಂತನೆಡೆಗೆ ಹೋಗುವವರಲ್ಲಿ ಇರಬೇಕಾದ ಒಳ್ಳೆಯ ಲಕ್ಷಣಗಳ ಬಗ್ಗೆ ಹೇಳುತ್ತಾ ಈ ಅಧ್ಯಾಯ ಪ್ರಾರಂಭವಾಗುತ್ತದೆ. ಅಧ್ಯಾತ್ಮದಲ್ಲಿ ಖಂಡಿತವಾಗಿ ಬೇಕಾದ, ನಾವು ರೂಢಿಸಿಕೊಳ್ಳಬೇಕಾದ ಪ್ರಮುಖ ಇಪ್ಪತ್ತಾರು ಗುಣಗಳನ್ನು ಕೃಷ್ಣ ಈ ಅಧ್ಯಾಯದ ಮೊದಲ ಮೂರು ಶ್ಲೋಕದಲ್ಲಿ ವಿವರಿಸಿದ್ದಾನೆ. ಬನ್ನಿ, ಭಗವಂತನತ್ತ ನಮ್ಮನ್ನು ಕೊಂಡೊಯ್ಯುವ ಬೆಳಕಿನ ದಾರಿಯ ಗುಣ ಲಕ್ಷಣಗಳನ್ನು ಕೃಷ್ಣನಿಂದ ತಿಳಿದು, ಕತ್ತಲಿನಿಂದ ಬೆಳಕಿನತ್ತ ಹೆಜ್ಜೆ ಹಾಕೋಣ.

ಭಗವಾನುವಾಚ ।

ಅಭಯಂ ಸತ್ತ್ವಸಂಶುದ್ಧಿರ್ಜ್ಞಾನಯೋಗವ್ಯವಸ್ಥಿತಿಃ ।
ದಾನಂ ದಮಶ್ಚ ಯಜ್ಞಶ್ಚ ಸ್ವಾಧ್ಯಾಯಸ್ತಪ ಆರ್ಜವಮ್ ॥೧॥

ಅಹಿಂಸಾ ಸತ್ಯಮಕ್ರೋಧಸ್ತ್ಯಾಗಃ ಶಾನ್ತಿರಪೈಶುನಮ್ ।
ದಯಾ ಭೂತೇಷ್ವಲೋಲುತ್ವಂಮಾರ್ದವಂ ಹ್ರೀರಚಾಪಲಮ್ ॥೨॥

ತೇಜಃ ಕ್ಷಮಾ ಧೃತಿಃ ಶೌಚಮದ್ರೋಹೋ ನಾತಿಮಾನಿತಾ ।
ಭವಂತಿ ಸಂಪದಂ ದೈವೀಮಭಿಜಾತಸ್ಯ ಭಾರತ ॥೩॥

ಭಗವಾನ್ ಉವಾಚ-ಭಗವಂತ ಹೇಳಿದನು:
ಅಭಯಂ ಸತ್ತ್ವಸಂಶುದ್ಧಿಃ ಜ್ಞಾನಯೋಗ ವ್ಯವಸ್ಥಿತಿಃ ।
ದಾನಮ್ ದಮಃ ಚ ಯಜ್ಞ ಚ ಸ್ವಾಧ್ಯಾಯಃ ತಪಃ ಆರ್ಜವಮ್ ॥
ಅಹಿಂಸಾ ಸತ್ಯಮ್ ಅಕ್ರೋಧಃ ತ್ಯಾಗಃ ಶಾಂತಿಃ ಅಪೈಶುನಮ್ ।
ದಯಾ ಭೂತೇಷು ಅಲೋಲುತ್ವಂ ಮಾರ್ದವಂ ಹ್ರೀಃ ಅಚಾಪಲಮ್ ॥
ತೇಜಃ ಕ್ಷಮಾ ಧೃತಿಃ ಶೌಚಮ್ ಅದ್ರೋಹಃ ನ ಅತಿಮಾನಿತಾ ।
ಭವಂತಿ ಸಂಪದಂ ದೈವೀಮ್ ಅಭಿಜಾತಸ್ಯ ಭಾರತ –ಹೇ ಭಾರತಾ, ದೈವೀಸಂಪತ್ತು [ಒಳ್ಳೆಯ ನಡತೆ] ಹೊತ್ತು ಹುಟ್ಟಿದವನಲ್ಲಿ ಈ ಗುಣಗಳಿರುತ್ತವೆ: ಅಂಜದಿರುವುದು ಮತ್ತು ಅಂಜಿಸದಿರುವುದು, ತಿಳಿಯಾದ ಮನಸ್ಸು, ಅರಿವಿನ ದಾರಿಯಲ್ಲಿ ನೆಲೆಗೊಳ್ಳುವುದು, ಕೊಡುಗೈತನ, ಇಂದ್ರಿಯಗಳ ಮೇಲೆ ಹಿಡಿತ, ದೇವತೆಗಳ ಆರಾಧನೆ, ವೇದಗಳ ಅಧ್ಯಯನ, ನೋಂಪಿಯ ನಿಷ್ಠೆ, ನೇರತನ, ನೋಯಿಸದಿರುವುದು, ನಿಜ ನುಡಿಯುವುದು, ಸಿಡುಕದಿರುವುದು, ಧಾರಾಳತನ, ಭಗವಂತನಲ್ಲಿ ಬಗೆ ನೆಟ್ಟಿರುವುದು, ಚಾಡಿ ಹೇಳದಿರುವುದು, ಪ್ರಾಣಿಗಳಲ್ಲಿ ಕನಿಕರ, ಅತಿಯಾಸೆ ಇರದಿರುವುದು, ನಮ್ರತೆ, ನಾಚಿಕೆ, ಗಟ್ಟಿತನ, ಕುಗ್ಗದಿರುವುದು, ತಪ್ಪನ್ನು ಮನ್ನಿಸುವ ತಾಳ್ಮೆ, ಕೆಚ್ಚು, ಒಳಹೊರಗಣ ಮಡಿ, ಎರಡೆಣಿಸದಿರುವುದು, ಮತ್ತು ಬೀಗದಿರುವುದು.

ಅಧ್ಯಾತ್ಮದ ಸಾಧನೆಯಲ್ಲಿರಬೇಕಾದ ಇಪ್ಪತ್ತಾರು ಸದ್ಗುಣಗಳನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ಈ ಇಪ್ಪತ್ತಾರು ಗುಣಗಳ ಬೆನ್ನುಹತ್ತಿ ಅದರಲ್ಲಿ ನಮ್ಮಲ್ಲಿರುವ ಗುಣವನ್ನು ನಾವು ಗುರುತಿಸಿಕೊಂಡು, ಅದನ್ನು ನಾವು ವೃದ್ಧಿಪಡಿಸಿಕೊಳ್ಳಬೇಕು ಮತ್ತು ಇಲ್ಲದ ಗುಣವನ್ನು ಬೆಳೆಸಿಕೊಳ್ಳಬೇಕು.

**(೧) ಅಭಯಂ (ನಿರ್ಭಯತ್ವ/ Fearlessness):** ಇದು ಅಧ್ಯಾತ್ಮದ ದಾರಿಯಲ್ಲಿ ಸಾಗುವವರಿಗಿರಬೇಕಾದ ಮೊತ್ತ ಮೊದಲ ಗುಣ. ಅಧ್ಯಾತ್ಮ ಹೇಡಿಗಳಿಗೆ ಹೇಳಿಸಿದ್ದಲ್ಲ. ಹನುಮಂತನ ಕುರಿತಾದ ಈ ಕೆಳಗಿನ ಶ್ಲೋಕ ಹೇಳುವಂತೆ:

ಬುದ್ಧಿರ್ಬಲಂ ಯಶೋ ಧೈರ್ಯಂ ನಿರ್ಭಯತ್ವಂ ಅರೋಗತಾ ।
ಅಜಾಡ್ಯಂ ವಾಕ್ ಪಟುತ್ವಂ ಚ ಹನುಮತ್ ಸ್ಮರಣಾತ್ ಭವೇತ್ ॥

ನಮ್ಮಲ್ಲಿ ನಿರ್ಭಯತ್ವ ಬರಬೇಕಾದರೆ ನಾವು ಪ್ರಾಣದೇವರ ಉಪಾಸನೆ ಮಾಡಬೇಕು. ಧೈರ್ಯವಿಲ್ಲದೆ ವೇದಾಂತ ಓದಿದರೆ ದೃಢನಂಬಿಕೆ(Conviction)ಬರುವುದಿಲ್ಲ. ನಾವು ಉಪಾಸನೆ ಮಾಡುವಾಗ ಯಾರೋ ಬಂದು ಏನೋ ಹೇಳುತ್ತಾರೆ. ಆಗ ನಮ್ಮ ಮನಸ್ಸು ದೃಢವಾಗಿ ದೇವರಲ್ಲಿ ನಿಲ್ಲುವುದಿಲ್ಲ. ಯಾರು ಏನೇ ಹೇಳಲಿ, 'ನಾನು ಹಿಡಿದ ದಾರಿಯನ್ನು ಬಿಡುವುದಿಲ್ಲ, ದೇವರು ನನ್ನನ್ನು ರಕ್ಷಿಸುತ್ತಾನೆ' ಎನ್ನುವ ದೃಢ ನಂಬಿಕೆ ಇದ್ದಾಗ ಮಾತ್ರ ನಾವು ಯಶಸ್ಸನ್ನು ಕಾಣಲು ಸಾಧ್ಯ.

ಇಂದಿನ ದಿನಗಳಲ್ಲಿ "ಹೀಗೆ ಮಾಡಿದರೆ ಅನರ್ಥ, ಹಾಗೆ ಮಾಡಿದರೆ ಅನರ್ಥ" ಎಂದು ಹೆದರಿಸುವ ಜನರೇ ಹೆಚ್ಚು. ಹೀಗೆ ಹೇಳುವ ಮಂದಿಗೆ ಶಾಸ್ತ್ರದ ಗಂಧ-ಗಾಳಿಯೂ ಗೊತ್ತಿರುವುದಿಲ್ಲ. ಇವರು ಹಿರಣ್ಯಕಶಿಪುವಿನ ಆವೇಶವುಳ್ಳ

ಜನ. ಉದಾಹರಣೆಗೆ ಕೆಲವರು 'ವಿಷ್ಣುಸಹಸ್ರನಾಮವನ್ನು ಹೆಂಗಸರು ಹೇಳಬಾರದು' ಎಂದು ಹೆದರಿಸುತ್ತಾರೆ. ಆದರೆ ವಿಪರ್ಯಾಸವೆಂದರೆ ದೇವರ ನಾಮವಿರುವುದೇ ನಮ್ಮ ಅಭಯಕ್ಕಾಗಿ. ಇದನ್ನು ತಿಳಿಯದೆ ಭಯಬಿದ್ದು ದೂರ ಸರಿದರೆ ಅದರಿಂದ ನಮಗೇ ನಷ್ಟ. ದೇವರು ಎಂದೂ ಭಯಾನಕ ಅಲ್ಲ. ಆತ ಭಯಾನಕನಾಗುವುದು ಕೇವಲ ಹಿರಣ್ಯಕಶಿಪುವಿನ ಆವೇಶವುಳ್ಳವರಿಗೇ ಹೊರತು ಪ್ರಹ್ಲಾದನ ಆವೇಶವುಳ್ಳವರಿಗಲ್ಲ. ನಾವು ಪ್ರಹ್ಲಾದನಂತಾಗಿ, ನಮ್ಮನ್ನು ಹೆದರಿಸುವ ಹಿರಣ್ಯಕಶಿಪುಗಳಿಗೆ ಭಯಬೀಳದೆ, ಅಭಯಪ್ರದ ಭಗವಂತನನ್ನು ಸ್ತುತಿಸಬೇಕು.

ಅಧ್ಯಾತ್ಮ ಸಾಧಕ ಎಂದೂ ಹೇಡಿಯಾಗಿರುವುದಿಲ್ಲ. ಏಕೆಂದರೆ ಅವನಿಗೆ ಒಂದು ವಿಷಯ ಖಚಿತವಾಗಿ ತಿಳಿದಿರುತ್ತದೆ. "ನಾನು ಹೆದರುವುದಕ್ಕೆ ಅರ್ಥವಿಲ್ಲ, ಏಕೆಂದರೆ ಭಗವಂತ ರಕ್ಷಿಸುವ ತನಕ ನನ್ನನ್ನು ಇಡೀ ಪ್ರಪಂಚ ಏನೂ ಮಾಡಲಾರದು; ಭಗವಂತ ಕೈಬಿಟ್ಟಮೇಲೆ ಯಾರೂ ನನ್ನನ್ನು ರಕ್ಷಿಸಲಾರರು". ಈ ರೀತಿ ನಿಶ್ಚಿತಾಭಿಪ್ರಾಯ ನಮ್ಮಲ್ಲಿ ಬೆಳೆಯಬೇಕು.

"ರಕ್ಷತೀತ್ಯೇವ ವಿಶ್ವಾಸಃ"-ಭಗವಂತ ತನ್ನ ಭಕ್ತರನ್ನು ಎಂದೂ ಬಿಟ್ಟು ಕೊಡುವುದಿಲ್ಲ. ಆದ್ದರಿಂದ 'ಅಭಯ' ನಮ್ಮಲ್ಲಿರಬೇಕಾದ ಮೊದಲ ಅರ್ಹತೆ. ಈ ವಿಶ್ವಾಸ ನಮ್ಮಲ್ಲಿ ಎಷ್ಟು ದೃಢವಾಗುವುದೋ ಅಷ್ಟು ರಕ್ಷಣೆ ಭಗವಂತನಿಂದ ಭಕ್ತನಿಗೆ ದೊರೆಯುತ್ತದೆ.

**(೨) ಸತ್ತ್ವಸಂಶುದ್ಧಿ(ಶುದ್ಧವಾದ ಮನಸ್ಸು/Pure Mind) :** ನಮ್ಮ ಮನಃಶುದ್ಧಿ ಅಧ್ಯಾತ್ಮ ಸಾಧನೆಯಲ್ಲಿ ಬಹಳ ಮುಖ್ಯ. ಸಾಮಾನ್ಯವಾಗಿ ನಮ್ಮ ಮನಸ್ಸು ಅನುವಂಶೀಯ ಕಾರಣದಿಂದ, ಅಥವಾ ಪರಿಸರದ ಪ್ರಭಾವದಿಂದ ಶುದ್ಧವಾಗಿರುವುದಿಲ್ಲ. ಹದಿಮೂರನೇ ಶತಮಾನದಲ್ಲೇ ಆಚಾರ್ಯರು "ದೌರ್ಲಭ್ಯಾತ್ ಶುದ್ಧ ಬುದ್ಧೀನಾಂ" ಎಂದಿರುವುದನ್ನು ನಾವು ಇಲ್ಲಿ ಗಮನಿಸಬೇಕು. ಶುದ್ಧ ಮನಸ್ಸಿರುವವರು ಸಮಾಜದಲ್ಲಿ ತುಂಬಾ ದುರ್ಲಭ.

ಇಲ್ಲಿ ಕೃಷ್ಣ ಕೇವಲ ಸತ್ತ್ವ ಶುದ್ಧಿ ಎಂದು ಹೇಳದೆ, 'ಸತ್ತ್ವ ಸಂ-ಶುದ್ಧಿ' ಎಂದು ಹೇಳಿದ್ದಾನೆ. ನಮ್ಮ ಮನಸ್ಸು ಒಮ್ಮೊಮ್ಮೆ ಶುದ್ಧವಾಗಿರುತ್ತದೆ, ನಿದ್ದೆಯಲ್ಲಿ ಎಲ್ಲರ ಮನಸ್ಸೂ ಶುದ್ಧ. ಆದರೆ ಇಲ್ಲಿ ಕೃಷ್ಣ ಹೇಳುವುದು ಸದಾ ಶುದ್ಧವಾಗಿರುವ ಎಚ್ಚರದ ಮನಸ್ಸು. ಇದನ್ನು ಭಾಗವತದಲ್ಲಿ "ಸತ್ತ್ವಂ ವಿಶುದ್ಧಂ ವಸುದೇವಶಬ್ದಿತಂ"..(೪-೩೦-೨೩) ಎಂದಿದ್ದಾರೆ. ಅಂದರೆ "ಸದಾ ಶುದ್ಧವಾಗಿರುವ ಮನಸ್ಸಿಗೆ ವಾಸುದೇವ ಗೋಚರನಾಗುತ್ತಾನೆ" ಎಂದರ್ಥ. ಆದ್ದರಿಂದ ಅಧ್ಯಾತ್ಮ ಸಾಧನೆಗೆ ಯಾವುದೇ ಕೊಳೆ ಇಲ್ಲದ, ಯಾವುದೇ ಪೂರ್ವಾಗ್ರಹ ಇಲ್ಲದ ಮನಸ್ಸು ಬಹಳ ಮುಖ್ಯ.

**(೩) ಜ್ಞಾನಯೋಗ ವ್ಯವಸ್ಥಿತಿಃ (ನಿರಂತರ ಜ್ಞಾನಯೋಗದಲ್ಲಿ ಮನಸ್ಸನ್ನು ನೆಲೆಗೊಳಿಸುವುದು):** ಉಪಾಸನಯೋಗ ಬಹಳ ಪ್ರಮುಖವಾದ ಯೋಗ. ಭಕ್ತಿ, ಜ್ಞಾನ ಮತ್ತು ಕರ್ಮಯೋಗ ಇದರ ಮೂರು ಮುಖಗಳು. ಇವು ಒಂದನ್ನೊಂದು ಬಿಟ್ಟು ಇರಲಾರವು. ಜ್ಞಾನಯೋಗ ಅಂದರೆ ಭಗವಂತನ ಹಿರಿಮೆಯನ್ನು ತಿಳಿದು, ಅವನ ಪೂಜಾರೂಪವಾಗಿ ಕರ್ಮವನ್ನು ಮಾಡಿ, ಅವನಲ್ಲಿ ಭಕ್ತಿ ಮಾಡುವುದು. 'ವ್ಯವಸ್ಥಿತಿಃ' ಅಂದರೆ ಅಚಲವಾದ ಸ್ಥಿತಿ. ಭಗವಂತನ ವಿಷಯವಾಗಿ ಅಚಲವಾದ ಮನಸ್ಸನ್ನಿಟ್ಟು, ನಿರಂತರ ಭಗವಂತನ ಚಿಂತನೆಯಲ್ಲಿ ಮನಸ್ಸನ್ನು ನೆಲೆಗೊಳಿಸುವುದು. ಇದರಿಂದ ಮನಸ್ಸು ಸ್ವಚ್ಛವಾಗುತ್ತದೆ.

**(೪) ದಾನಂ(ನಮ್ಮಲ್ಲಿರುವುದನ್ನು ಇನ್ನೊಬ್ಬರಿಗೆ ಕೊಡುವುದು):** ನಮ್ಮಲ್ಲಿ ಇರುವ ವಸ್ತು ಇನ್ನೊಬ್ಬರಲ್ಲಿ ಇಲ್ಲದೇ ಇದ್ದಾಗ, ಅವರಿಗೆ ಅದು ಬಹಳ ಅಗತ್ಯವಿದ್ದಾಗ, ಆ ವಸ್ತು ನಮಗೆ ಮುಂದೆ ಅಗತ್ಯಬೀಳಬಹುದಾದರೂ ಕೂಡಾ,

ಅದರ ಬಗ್ಗೆ ಯೋಚಿಸದೆ, ಅರ್ಪಣಾ ಭಾವದಿಂದ ಕೊಡುವುದು ದಾನ. ಇದನ್ನು ಬಿಟ್ಟು ಮನೆಯಲ್ಲಿ ಅಗತ್ಯವಿಲ್ಲದ ವಸ್ತುವನ್ನು ಸಾಗಹಾಕುವುದಕ್ಕೋಸ್ಕರ ಕೊಡುವುದು, ಉತ್ತಮ ದರ್ಜೆಯನ್ನು ಒಳಗಿಟ್ಟು, ಕೀಳು ದರ್ಜೆಯನ್ನು ಕೊಡುವುದು-ದಾನವಲ್ಲ. ಕೊಡುವಾಗ ಮನಸ್ಸಿನಲ್ಲಿ ನಮಗೆ ಕೊಡುವ ವಸ್ತುವಿನ ಮೇಲೆ ಯಾವ ಮಮಕಾರವೂ ಇರಕೂಡಾದು; 'ಕೊಡುತ್ತಿದ್ದೇನೆ', ಕೊಟ್ಟೆ' ಎನ್ನುವ ಅಹಂಕಾರ ಇರಕೂಡಾದು. ಪೂರ್ಣ ಅರ್ಪಣಾ ಭಾವದಿಂದ ಕೊಡಬೇಕು. ಕೊಡುವ ವಸ್ತು ಜ್ಞಾನವಾಗಿರಬಹುದು, ಧಾನ್ಯವಾಗಿರಬಹುದು, ಅಭಯವಾಗಿರಬಹುದು (ಇನ್ನೊಬ್ಬರಿಗೆ ಧೈರ್ಯ ಕೊಡುವುದು), ಹೀಗೆ ಯಾವುದೇ ಕಾರ್ಯವಿರಬಹುದು. ಅಲ್ಲಿ ಕಾರ್ಯಕ್ಕಿಂತ ಮುಖ್ಯವಾದುದು ಆ ಕಾರ್ಯದ ಹಿಂದಿನ ನಮ್ಮ ಭಾವನೆ (ಇನ್ನೂ ಹೆಚ್ಚಿನ ವಿವರಣೆಯನ್ನು ಅ-೧೦, ಶ್ಲೋ-೦೫ರಲ್ಲಿ ವಿವರಿಸಲಾಗಿದೆ) .

(೫) ದಮ (೬) ಯಜ್ಞ : ಇಲ್ಲಿ ಈ ಎರಡು ಕ್ರಿಯೆಯನ್ನು ಕೃಷ್ಣ 'ಚ'-ಕಾರ ಬಳಸಿ(ದಮಶ್ಚ, ಯಜ್ಞಶ್ಚ) ಹೇಳಿದ್ದಾನೆ. ಇದು ಇತರ ಎಲ್ಲಾ ನಡತೆಗಳೊಂದಿಗೆ ಬಹಳ ಮುಖ್ಯ ನಡತೆ ಎಂದು ತೋರಿಸಲು ಇಲ್ಲಿ ಚ-ಕಾರ ಬಳಸಲಾಗಿದೆ. 'ದಮ' ಅಂದರೆ ಕೆಟ್ಟದ್ದನ್ನು ಮಾಡುವುದನ್ನು ಬಿಡುವುದು; ನಮ್ಮ ಇಂದ್ರಿಯಗಳು ಕೆಟ್ಟದ್ದನ್ನು ಮಾಡದಂತೆ ನಿಯಂತ್ರಿಸುವುದು. ಯಜ್ಞ ಅಂದರೆ ಮಾಡುವ ಎಲ್ಲಾ ಕೆಲಸವನ್ನು ಭಗವದರ್ಪಣೆಯಾಗಿ ಮಾಡುವುದು. ನಾವು ಈ ಎರಡು ನಡತೆಯನ್ನು ನಿರಂತರ ನಮ್ಮ ಜೀವನದಲ್ಲಿ ಪಾಲಿಸಬೇಕು. ಈ ಎರಡು ನಡತೆ ಇಲ್ಲದೆ, ಇತರ ನಡತೆಯನ್ನು ಸಾಧಿಸಲು ಸಾಧ್ಯವಿಲ್ಲ.

(೭) ಸ್ವಾಧ್ಯಾಯಃ – ಮೂರು ತರದಲ್ಲಿ ಸ್ವಾಧ್ಯಾಯವಿದೆ. ಸ್ವತಂತ್ರನಾದ ಭಗವಂತನ ಬಗೆಗೆ ಇರತಕ್ಕಂತಹ ಸಮಗ್ರ ವೇದಗಳ ಅಧ್ಯಯನ-ಸ್ವಾಧ್ಯಾಯ; ಇದು ಸಾಧ್ಯವಾಗದೇ ಇದ್ದರೆ ಅವರವರ ಶಾಖೆಯ(ಸ್ವಂ) ವೇದಾಧ್ಯಯನ. ಇದನ್ನು ಕೂಡಾ ಸ್ವಾಧ್ಯಾಯ ಎನ್ನುತ್ತಾರೆ. ಇನ್ನು ಮೂರನೆಯದು ನಾವು ಗುರುಗಳಿಂದ ಕೇಳಿದ ಅಧ್ಯಾತ್ಮ ವಿಚಾರವನ್ನು ಮನನ ಮಾಡಿ, ಸ್ವಪ್ರವಚನ ಮಾಡಿಕೊಂಡು, ನಮ್ಮ ಆತ್ಮಕ್ಕೆ ಆ ವಿಚಾರ ತಿಳಿದ ಮೇಲೆ ಇನ್ನೊಬ್ಬರಿಗೆ ಹೇಳುವುದು. ಆದರೆ ಇಂದು ಈ ಸ್ವಾಧ್ಯಾಯ ಕಣ್ಮರೆಯಾಗುತ್ತಿದೆ. ಪತಂಜಲಿ ಹೇಳುತ್ತಾನೆ: "ವೇದಂ ಅಧಿತ್ಯ ತ್ವರಿತ ವಕ್ತಾರೋ ಭವಂತಿ" ಎಂದು. ಇಂದು ವಿಧ್ಯಾರ್ಥಿ-ನಾಳೆ ಅಧ್ಯಾಪಕ(ವಕ್ತಾರಃ). ನಡುವೆ ಸ್ವಾಧ್ಯಾಯ ಎನ್ನುವ ವಿಚಾರ ಇಂದು ಇಲ್ಲವಾಗಿದೆ. "ತ್ವರಿತ ಅಧಿತ್ಯ"- ಎಲ್ಲವೂ ತ್ವರಿತ!

(೮) ತಪಃ : ಕೃಷ್ಣ ಇಲ್ಲಿ ಹೇಳುವ ತಪಃ ಹಿಂದೆ ಹೇಳಿದ ತಪಸ್ಸಲ್ಲ. ನಮ್ಮ ಮನಸ್ಸು ದಾರಿ ತಪ್ಪಿ ಹೋಗದಂತೆ ನಿಯಂತ್ರಣ ಮಾಡುವುದು 'ದಮ'; ಅದರಿಂದ ಶಾಸ್ತ್ರದ ನಿರಂತರ ಅಧ್ಯಾಯನ 'ಸ್ವಾಧ್ಯಾಯ'. ಇವೆರಡರಲ್ಲಿ ನಮಗೆ ತೊಂದರೆ ಕೊಡುವ ಎರಡು ಅಂಶಗಳಿವೆ. ಅವುಗಳೆಂದರೆ ನಾಲಿಗೆ ಚಪಲ ಮತ್ತು ಲೈಂಗಿಕ ಆಸಕ್ತಿ. ಇವು ಅಧ್ಯಯನದ ಮೂಲ ಶತ್ರುಗಳು. ಇದನ್ನು ನಿಯಂತ್ರಿಸುವುದು ತಪಃ. ಇದಕ್ಕಾಗಿ ಹಿಂದೆ ಪುಣ್ಯಕ್ಷೇತ್ರಕ್ಕೆ ಹೋದಾಗ ತಮ್ಮ ಯಾವುದೋ ಒಂದು ತಿನ್ನುವ ಚಪಲವನ್ನು ಅಲ್ಲಿ ಬಿಟ್ಟುಬರುತ್ತಿದ್ದರು. ಯಾವುದಾದರೊಂದು ನೆಪದಿಂದ ತಮ್ಮ ಚಪಲವನ್ನು ಕಳಚಿಕೊಳ್ಳುವುದು ಇದರ ಹಿಂದಿನ ಕಾರಣ.

(೯) ಆರ್ಜವಮ್ (ಪ್ರಾಮಾಣಿಕತೆ/Straightforwardness): ನೇರ ನಡೆ ನುಡಿ. ಮಾತನಾಡುವುದೊಂದು-ಮಾಡುವುದು ಇನ್ನೊಂದು ಮಾಡದೇ, ಪ್ರಾಮಾಣಿಕತೆಯಿಂದಿರುವುದು.

(೧೦) ಅಹಿಂಸಾ : ಈ ಬಗ್ಗೆ ಅಧ್ಯಾಯ ಹತ್ತರಲ್ಲಿ(ಶ್ಲೋಕ-೦೫) ಸ್ವಲ್ಪ ಮಟ್ಟಿಗೆ ವಿಶ್ಲೇಷಿಸಿದ್ದೇವೆ. ದ್ವೇಷದಿಂದ, ಅಸಹನೆಯಿಂದ, ಅಸೂಯೆಯಿಂದ ಇನ್ನೊಬ್ಬರಿಗೆ ನೋವನ್ನುಂಟುಮಾಡುವುದು ಹಿಂಸೆ. ಆಹಾರಕ್ಕಾಗಿ

ಇನ್ನೊಂದು ಜೀವವನ್ನು ಅನಿವಾರ್ಯವಾಗಿ ಸಾಯಿಸುವುದು ಹಿಂಸೆ ಅಲ್ಲ(ಉದಾ: ವನಸ್ಪತಿಗಳ ಸೇವನೆ, ಕ್ಷತ್ರಿಯರ ಮಾಂಸಭಕ್ಷಣೆ ಇತ್ಯಾದಿ); ನಡೆಯುವಾಗ, ಉಸಿರಾಡುವಾಗ, ತಿಳಿಯದೇ ಸೂಕ್ಷ್ಮ ಜೀವಿಗಳು ಸತ್ತರೆ ಅದು ಹಿಂಸೆ ಅಲ್ಲ; ದೇಶವನ್ನು ಕಾಯುವ ಸೈನಿಕ ತನ್ನ ಧರ್ಮ ಪಾಲನೆಗಾಗಿ ಶತ್ರು ಸೈನಿಕನನ್ನು ಕೊಂದರೆ ಅದು ಹಿಂಸೆ ಅಲ್ಲ; ಮುಂದೆ ನಡೆಯುವ ಮಹಾ ಹಿಂಸೆಯನ್ನು ತಡೆಯಲು ಅನಿವಾರ್ಯವಾಗಿ ನಡೆಯುವ ಯುದ್ಧ ಹಿಂಸೆ ಅಲ್ಲ(ಉದಾ: ಮಹಾಭಾರತ ಯುದ್ಧ); ಸಾವಿರಾರು ಜನರನ್ನು ರಕ್ಷಿಸುವುದಕ್ಕೋಸ್ಕರ ಒಬ್ಬನನ್ನು ಕೊಲ್ಲುವುದು ಹಿಂಸೆ ಅಲ್ಲ (ಉದಾ: ದಿನಕ್ಕೆ ಹತ್ತು ಸಾವಿರ ಸೈನಿಕರನ್ನು ಕೊಲ್ಲುವ ಪಣತೊಟ್ಟು ಹಗಲೂ ರಾತ್ರಿ ಹೋರಾಡುತ್ತಿದ್ದ ದ್ರೋಣಾಚಾರ್ಯರನ್ನು ಕೃಷ್ಣ ಕೊಲ್ಲಿಸಿರುವುದು); ವೈದ್ಯರು ರೋಗಿಯನ್ನು ಬದುಕಿಸುವುದಕ್ಕೋಸ್ಕರ ಮಾಡುವ ಕ್ರಿಯೆ ಹಿಂಸೆ ಅಲ್ಲ;  ಹೀಗೆ ಒಟ್ಟಿನಲ್ಲಿ ದ್ವೇಷ, ಅಸಹನೆ, ಅಸೂಯೆ, ಸ್ವಾರ್ಥವಿಲ್ಲದೆ ನಡೆಯುವ ಅನಿವಾರ್ಯವಾದ ಹಿಂಸೆ-ಅಹಿಂಸೆ ಎನಿಸುತ್ತದೆ.

ಇನ್ನೊಬ್ಬರಿಗೆ ತೊಂದರೆಯಾಗದಂತೆ ಬದುಕುವುದು ಅಹಿಂಸೆ. ನಾವು ಇನ್ನೊಬ್ಬರ ಮನಸ್ಸನ್ನು ಘಾಸಿಗೊಳಿಸಿದರೆ ಅದನ್ನು ಮರಳಿ ವಾಸಿ ಮಾಡುವ ಯಾವ ಔಷಧವೂ ಇಲ್ಲ. ಆದ್ದರಿಂದ ಎಂದೂ ಇನ್ನೊಬ್ಬರನ್ನು ಮುಖಭಂಗ(Insult) ಮಾಡಬೇಡ. ಉದಾಹರಣೆಗೆ: ಒಬ್ಬರನ್ನು ಚುಚ್ಚು ಮಾತಿನಿಂದ ಹಂಗಿಸುವುದು, ಮಾನಸಿಕವಾಗಿ ಇನ್ನೊಬ್ಬರನ್ನು ನಿಂದಿಸುವುದು ಅಥವಾ ಶಾಪ ಹಾಕುವುದು. ನಾವು ನಮ್ಮ ಮಾತಿನಿಂದ, ಕೃತಿಯಿಂದ ಮತ್ತು ಮನಸ್ಸಿನಿಂದ ಇನ್ನೊಬ್ಬರಿಗೆ ಹಿಂಸೆಯಾಗದಂತೆ ನಡೆದುಕೊಳ್ಳಬೇಕು.

(೧೧) ಸತ್ಯಮ್: ಇದು ಪ್ರಾಮಾಣಿಕತೆಯ ಇನ್ನೊಂದು ಮುಖ. ಇಲ್ಲಿ ಸತ್ಯ ಅಂದರೆ ಇದ್ದದ್ದನ್ನು ಇದ್ದಂತೆ ಹೇಳುವುದಲ್ಲ. ಸಮಾಜದಲ್ಲಿ ಸಾದು ಸಜ್ಜನರಿಗೆ ಹಿತವಾಗುವಂತಹ ಮಾತು ಸತ್ಯ. ಕೆಲವೊಮ್ಮೆ ಲೋಕ ಹಿತಕ್ಕೋಸ್ಕರ ನಾವು ಹೇಳುವ ಸುಳ್ಳೂ ಕೂಡಾ ಸತ್ಯವಾಗುತ್ತದೆ; ಲೋಕಕ್ಕೆ ಅನ್ಯಾಯವಾಗುವಂತಹ ಸತ್ಯವೂ ಸುಳ್ಳಾಗುತ್ತದೆ. ಮಹಾಭಾರತದಲ್ಲಿ ಕೃಷ್ಣ ಈ ಸಂದೇಶವನ್ನು ಕ್ರಾಂತಿಕಾರಕ ರೂಪದಲ್ಲಿ ಮಾಡಿ ತೋರಿಸಿದ್ದಾನೆ. ಈ ವಿಷಯ ಮಹಾಭಾರತದಲ್ಲಿ ವಿಶೇಷವಾಗಿ ಪ್ರಸ್ತಾಪವಾಗಿದೆ. ಅಲ್ಲಿ ಹೇಳುವಂತೆ:

> ನ ನರ್ಮ ಯುಕ್ತಂ ವಚನಂ ಹಿನಸ್ತಿ ನ ಸ್ತ್ರೀಷು ರಾಜನ್ ನ ವಿವಾಹ ಕಾಲೇ
> ಪ್ರಾಣಾತ್ಯಯೈ ಸರ್ವಧನಾಪಹಾರೇ ಪಂಚಾನೃತಾನ್ಯ ಆಹುರ್ ಅಪಾತ್ ಕಾನಿ ||೧-೭೭-೧೬||

ಒಬ್ಬರ ಮದುವೆಯನ್ನು ಹೊಟ್ಟೆಕಿಚ್ಚಿನಿಂದ ಸುಳ್ಳು ಹೇಳಿ ತಪ್ಪಿಸುವುದು, ನಿಶ್ಚಿತಾರ್ಥವಾಗಿರುವ ಮದುವೆಯನ್ನು ತಪ್ಪಿಸುವುದು,  ಇತ್ಯಾದಿಯನ್ನು ಶಾಸ್ತ್ರ ಖಂಡಿಸುತ್ತದೆ. ಪ್ರಾಣಾಪಾಯದ ಕಾಲದಲ್ಲಿ ಜೀವ ರಕ್ಷಣೆಗಾಗಿ ಹೇಳುವ ಸುಳ್ಳು ಸುಳ್ಳಲ್ಲ.

(೧೨) ಅಕ್ರೋಧಃ:  ಯಾವ ಕಾಲಕ್ಕೂ ಇನ್ನೊಬ್ಬರ ಮೇಲೆ ಕೋಪಿಸಿಕೊಳ್ಳದೇ ಇರುವುದು. ಅಪ್ರಿಯ ಘಟನೆ ನಡೆದಾಗ ಕೋಪ ಬರಬಹುದು. ಆದರೆ ನಿಮ್ಮನ್ನು ಕೋಪದ ಕೈಗೆ ಎಂದೂ ಕೊಡಬೇಡಿ. ಕೋಪಬಂದಾಗ-ಕೋಪ ಇಳಿಯುವ ತನಕ ಮೌನವನ್ನಾಚರಿಸಿದರೆ ಅದರಿಂದಾಗುವ ಅನಾಹುತ ತಪ್ಪುತ್ತದೆ. ಕಾಮ-ಕ್ರೋದದ ಬಗ್ಗೆ ಕೃಷ್ಣ ಗೀತೆಯಲ್ಲಿ ಅನೇಕ ಬಾರಿ ನಮ್ಮನ್ನು ಎಚ್ಚರಿಸುತ್ತಾನೆ. ನೆಮ್ಮದಿಯ ಜೀವನಕ್ಕೆ ಇವು ಮಾರಕ. ಹೇಗೆ ಶಾಂತತೆಯನ್ನು ನಾವು ಕಲಿತುಕೊಳ್ಳಬೇಕು ಎನ್ನುವುದಕ್ಕೆ ಶ್ರೀರಾಮಚಂದ್ರನ ಜೀವನವೇ ಉತ್ತಮ

ಉದಾಹರಣೆ. ರಾಮಾಯಣದಲ್ಲಿ ವಾಲ್ಮೀಕಿ ಹೇಳುತ್ತಾರೆ: "ಉಚ್ಚಮಾನೋऽಪಿ ಪರುಷಮ್ ನೋತ್ತರಂ ಪ್ರತಿಪದ್ಯತೆ" ಎಂದು. ||ಅಯೋಧ್ಯಾ-೧.೧೫|| ರಾಮನಲ್ಲಿ ಯಾರಾದರೂ ಜಗಳಕ್ಕೆ ನಿಂತರೆ ಆತ ಎಂದೂ ಸಿಟ್ಟಿಗೇಳುತ್ತಿರಲಿಲ್ಲವಂತೆ.

(೧೩) ತ್ಯಾಗಃ: ಮೇಲ್ನೋಟಕ್ಕೆ ದಾನ ಮತ್ತು ತ್ಯಾಗ ಒಂದೇ ಎನ್ನುವಂತೆ ಕಾಣಿಸುತ್ತದೆ. ಆದರೆ ತ್ಯಾಗ ಎಂದರೆ ನಮ್ಮಲ್ಲಿರುವ ವಸ್ತುವೂ ಕೂಡಾ ನನ್ನದಲ್ಲ-ಭಗವಂತನದು ಎನ್ನುವ ಭಾವನೆಯಿಂದ ಬದುಕುವುದು. ತ್ಯಾಗದಲ್ಲಿ ಅನೇಕ ವಿಧ. ಅಭಿಮಾನ ತ್ಯಾಗ, ಫಲ ತ್ಯಾಗ, ಅಹಂಕಾರ-ಮಮಕಾರ ತ್ಯಾಗ ಇತ್ಯಾದಿ. ಪ್ರೀತಿ ಇರಲಿ, ಆದರೆ 'ನನ್ನದು' ಎನ್ನುವ ಭಾವನೆಯಿಂದ ದೂರ ನಿಲ್ಲು. ಬಂದಾಗ ಸಂತೋಷದಿಂದ ಸ್ವೀಕರಿಸು, ಹೋದಾಗ ನಿರ್ಲಿಪ್ತನಾಗಿ ಇದ್ದು ಬಿಡು. ಈ ಜೀವನ ಪಯಣದಲ್ಲಿ ಯಾವುದೂ ಶಾಶ್ವತವಲ್ಲ. ಭಗವಂತನೊಬ್ಬನೇ ನಿತ್ಯ ಎಂದು ತಿಳಿದು ಆತನನ್ನು ಗುರಿಯಿಟ್ಟು ಪಯಣಿಸು.

(೧೪) ಶಾಂತಿಃ : ತ್ಯಾಗದಿಂದ ಮೊತ್ತ ಮೊದಲು ಸಿಗುವುದು ನೆಮ್ಮದಿ. ಸ್ವಲ್ಪವೂ ಉದ್ವೇಗಕ್ಕೆ ಒಳಗಾಗದೆ, ಪ್ರತಿಯೊಂದನ್ನೂ ಸ್ವೀಕರಿಸಿದಾಗ ಎಲ್ಲವೂ ಶಾಂತ. ಮನಸ್ಸನ್ನು ಭಗವಂತನಲ್ಲಿ ನೆಲೆಗೊಳಿಸಿದಾಗ ಮಾತ್ರ ಅಂತಹ ಶಾಂತಿ ಬರಲು ಸಾಧ್ಯ. ಕ್ಷುದ್ರವಾದ ಲೌಕಿಕ ವಿಚಾರದಲ್ಲಿ ತಲೆ ಹಾಕಿಕೊಂಡು- ಪೈಪೋಟಿ, ಸ್ಪರ್ಧೆ, ಜಗಳ, ವಿರಸದಿಂದ ಜೀವನ ಸಾಗಿಸುವುದಕ್ಕಿಂತ ಭಗವಂತನಲ್ಲಿ ಮನಸ್ಸನ್ನು ನೆಲೆಗೊಳಿಸಿ ಶಾಂತಿಯನ್ನು ಸಾಧಿಸು.

(೧೫) ಅಪೈಶುನಮ್: 'ಪೈಶುನಮ್' ಅಂದರೆ ಚಾಡಿ ಹೇಳಿ ವಿರಸ ಹುಟ್ಟಿಸುವುದು. ಇದು ಅತ್ಯಂತ ನಿಕೃಷ್ಟ ಗುಣ. ನಮ್ಮ ಸ್ವಾರ್ಥಕ್ಕಾಗಿ ದೊಡ್ಡವರಲ್ಲಿ ಚಾಡಿಹೇಳಿ, ಸಮಾಜ ಸ್ವಾಸ್ಥ್ಯವನ್ನು ಕೆಡಿಸುವುದು ಮಹಾ ಪಾಪ. ಆದ್ದರಿಂದ ನೀನು ಅಪೈಶುನನಾಗು ಎನ್ನುತ್ತಾನೆ ಕೃಷ್ಣ. ಚಾಡಿ ಹೇಳಬೇಡ ಮತ್ತು ಚಾಡಿಗೆ ಕಿವಿಗೊಡಬೇಡ.

(೧೬) ದಯಾ ಭೂತೇಷು: ಚೈತನ್ಯವಿರುವ ಪ್ರತಿಯೊಂದು ಜೀವಿಗಳ ಮೇಲೆ ಅನುಕಂಪವಿರಲಿ. ಅದು ವನಸ್ಪತಿ ಇರಲಿ, ಪ್ರಾಣಿ ಇರಲಿ, ಪಕ್ಷಿ ಇರಲಿ, ಮಾನುಷ್ಯನಿರಲಿ. ಎಲ್ಲರ ಮೇಲೂ ದಯೆ ಇರಲಿ. ಇದನ್ನು ಹಿಂದಿನ ಕಾಲದಲ್ಲಿ ವಿಶೇಷ ರೀತಿಯಲ್ಲಿ ಅನುಸರಿಸಿಕೊಂಡು ಬರುತ್ತಿದ್ದರು. ಬೆಳಿಗ್ಗೆ ಎದ್ದು ತುಳಸಿಗೆ ನೀರು ಹಾಕುವುದು, ಗೋಶಾಲೆಗೆ ಹೋಗಿ ಹಸುಗಳಿಗೆ ಆಹಾರ ನೀಡುವುದು, ಮನೆಯಲ್ಲಿರುವ ನಾಯಿಗೆ ನಾವು ಊಟ ಮಾಡುವ ಮೊದಲು ಆಹಾರ ನೀಡುವುದು, ಮನೆ ಸುತ್ತಮುತ್ತಲಿರುವ ಪಕ್ಷಿಗಳಿಗೆ ಆಹಾರ ಕೊಡುವುದು, ಹಸಿದು ಬಂದ ವ್ಯಕ್ತಿಯ ಹೊಟ್ಟೆಯಲ್ಲಿರುವ ವೈಶ್ವಾನರನನ್ನು ತಣಿಸುವುದು ಇತ್ಯಾದಿ. ಇದಲ್ಲದೆ ಇನ್ನೊಬ್ಬರು ತೊಂದರೆಯಲ್ಲಿದ್ದಾಗ, ಆತ ಮಿತ್ರ ಶತ್ರು ಎನ್ನುವ ಭೇದವೆಣಿಸದೇ ಅವರ ಮೇಲೆ ದಯೆ ತೋರುವುದು ಬಹಳ ದೊಡ್ಡ ಗುಣ. ಈ ಗುಣವನ್ನು ಮುಖ್ಯವಾಗಿ ಮಹಾಭಾರತದಲ್ಲಿ ಧರ್ಮರಾಯನಲ್ಲಿ ಕಾಣುತ್ತೇವೆ.

(೧೭) ಅಲೋಲುತ್ವಂ/ ಅಲೋಲತ್ವಂ: ಒಂದನ್ನು ಅತಿಯಾಗಿ ಹಚ್ಚಿಕೊಳ್ಳುವುದು ಲೋಲತ್ವ. ಯಾವುದರ ಮೇಲೂ ಅತಿಯಾದ ಮೋಹ ಬೇಡ. ಅಂಟಿಸಿಕೊಳ್ಳುವುದು ದುಃಖಕ್ಕೆ ಕಾರಣ.

(೧೮) ಮಾರ್ದವಂ(Softness): ಸೌಜನ್ಯ, ಮೃದು ಸ್ವಭಾವವನ್ನು ಇಲ್ಲಿ ಮಾರ್ದವಂ ಎಂದಿದ್ದಾರೆ. ನಮ್ಮಲ್ಲಿ ಕೆಲವರು ತಮ್ಮ ಕೆಲಸದವರನ್ನು, ಅಥವಾ ತಮ್ಮ ಕೈ ಕೆಳಗೆ ಕೆಲಸ ಮಾಡುವ ಸಹೋದ್ಯೋಗಿಗಳನ್ನು ಗೌರವವಿಲ್ಲದೆ ಮಾತನಾಡಿಸುತ್ತಾರೆ. ಅವರು 'ನನ್ನ ಸೇವಕರು' ಎಂದು ಅಹಂಕಾರದಿಂದ ಅವರೊಂದಿಗೆ ವ್ಯವಹರಿಸುತ್ತಾರೆ. ಇದು ಅತ್ಯಂತ ನೀಚ ಗುಣ. ಇದರಿಂದಾಗಿ ನಾವು ಆ ವ್ಯಕ್ತಿಯ ಮನ ನೋಯಿಸುವುದಷ್ಟೇ

ಅಲ್ಲ, ಆತನ ಒಳಗಿರುವ ಭಗವಂತನನ್ನು ಧಿಕ್ಕರಿಸಿದಂತೆ. ಇದು ಅಹಂಕಾರದ ಇನ್ನೊಂದು ಮುಖ. ಅದಕ್ಕಾಗಿ ಕೃಷ್ಣ ಹೇಳಿದ: "ನಿಮ್ಮ ನಡತೆಯಲ್ಲಿ ನಯ ವಿನಯವಿರಲಿ, ಸೌಜನ್ಯವಿರಲಿ" ಎಂದು.

(೧೯) ಹ್ರೀಃ (ನಾಚಿಕೊಳ್ಳುವುದು): ತಪ್ಪು ಮಾಡಿದಾಗ ನಾಚಿಕೊಳ್ಳುವುದು. ಇದು ಬಹಳ ದೊಡ್ಡ ಗುಣ. ತೈತ್ತಿರೇಯ ಉಪನಿಷತ್ತಿನಲ್ಲಿ ಹೇಳುವಂತೆ : । ಶ್ರೀಯಾ ದೇಯಂ । ಹ್ರೀಯಾ ದೇಯಂ । ಭಿಯಾ ದೇಯಂ । ಸಂವಿದಾ ದೇಯಂ ॥೧೧-೦೩॥ ಇನ್ನೊಬ್ಬರು ಟೀಕೆ ಮಾಡಬಹುದು ಎನ್ನುವ ನಾಚಿಕೆಯಿಂದಾದರೂ ದಾನ ಮಾಡು ಎನ್ನುತ್ತದೆ ಶಾಸ್ತ್ರ.

(೨೦) ಅಚಾಪಲಮ್ : ಸ್ವಂತ ನಿರ್ಧಾರ ತೆಗೆದುಕೊಳ್ಳುವ ಸ್ಥೈರ್ಯ. ವಿಷಯ ವಿಶ್ಲೇಷಣೆ ಮಾಡಿ ಯಾವುದು ಸರಿ, ಯಾವುದು ತಪ್ಪು ಎಂದು ತಿಳಿದು, ಯಾವುದು ನನ್ನ ದಾರಿ ಎಂದು ಗಟ್ಟಿಯಾಗಿ ನಿಲ್ಲುವುದು ಅಚಾಪಲಮ್.

(೨೧) ತೇಜಃ (ತೇಜಸ್ಸು): ಇದನ್ನು ಶಾಸ್ತ್ರಕಾರರು ಬ್ರಹ್ಮವರ್ಚಸ್ಸು ಎನ್ನುತ್ತಾರೆ. ಮುಖದಲ್ಲಿ ಕಳೆ ತುಂಬಿಕೊಂಡಿರುವುದು. ಕಣ್ಣಿನಲ್ಲಿ ತೇಜಸ್ಸು.  ಮನಸ್ಸು ಸ್ವಚ್ಛವಿರುವ ಸಾಧನೆಯ ಮಾರ್ಗದಲ್ಲಿ ಸಾಗುವ ಜ್ಞಾನಿಗಳಲ್ಲಿ ಮಾತ್ರ ಈ ಗುಣವಿರುತ್ತದೆ.

(೨೨) ಕ್ಷಮಾ(forgiveness): ತಪ್ಪು ಮಾಡಿದವರ ಮೇಲೆ ಕೂಡಾ ಪ್ರತೀಕಾರ ಭಾವನೆ ಬೆಳೆಸಿಕೊಳ್ಳದೇ ಇರುವುದು.  ನಮ್ಮ ಮನಸ್ಸಿನಲ್ಲಿ ಎಂದೂ ಪ್ರತೀಕಾರ ಭಾವನೆ ಹುಟ್ಟಲೇಬಾರದು. ಶಾಸ್ತ್ರದಲ್ಲಿ ಹೇಳುವಂತೆ: "ಇನ್ನೊಬ್ಬರು ಅಪಕಾರ ಮಾಡಿದರೂ ಕೂಡಾ ಅವರನ್ನು ಕ್ಷಮಿಸು" ಎಂದು. "ದೇವರೇ, ಅವರಿಗೆ ಒಳ್ಳೆಯ ಬುದ್ಧಿ ಕೊಡು" ಎಂದು ಪ್ರಾರ್ಥಿಸು-ಆದರೆ ಪ್ರತೀಕಾರದ ಭಾವನೆ ಬೇಡ. ನಮ್ಮಲ್ಲಿ "ಎಲ್ಲರೂ ನನ್ನನ್ನು ಮೆಚ್ಚಿಕೊಳ್ಳಬೇಕು" ಎನ್ನುವ ಅಹಂಕಾರ(Ego) ಇಲ್ಲದೇ ಇದ್ದರೆ ಮಾತ್ರ ಕ್ಷಮಾ ಸಾಧ್ಯ.

(೨೩) ಧೃತಿಃ (ಏನೇ ಆದರೂ ಜೀವನದಲ್ಲಿ ಕಂಗೆಡದಿರುವುದು): ಆತ್ಮ ಭರವಸೆ ಇದ್ದಾಗ ನಮ್ಮನ್ನು ಯಾರೂ ಏನೂ ಮಾಡಲು ಸಾಧ್ಯವಿಲ್ಲ. ನಿಜವಾದ ಜ್ಞಾನಿ ಎಂದೂ ಅಂಜುಬುರುಕನಾಗಿ ಧೃತಿಗೆಡುವುದಿಲ್ಲ. "ಮುಂದೆ ಹೀಗಾಗಬಹುದು" ಎಂದು ಮನಸ್ಸಿನಲ್ಲಿ ಯೋಚಿಸಿಕೊಂಡು ಕೊರಗುವುದು ಜೀವನವಲ್ಲ, ಬದಲಿಗೆ ಏನೇ ಬಂದರು ಅದನ್ನು ಎದುರಿಸುವ ಶಕ್ತಿ ಭಗವಂತ ನನಗೆ ಕೊಡುತ್ತಾನೆ ಎನ್ನುವ ಧೃಡವಾದ ಆತ್ಮಶಕ್ತಿ ಧೃತಿ. ವಿಷಮ ಪರಿಸ್ಥಿತಿ(crisis)ಯನ್ನು ಎದುರಿಸಿಕೊಂಡು ಬದುಕುವುದೇ ಜೀವನ. ಅನಿರೀಕ್ಷಿತ ಆಪತ್ತು ಜೀವನದಲ್ಲಿ ಸಾಮಾನ್ಯ. ಅದನ್ನು ತಿಳಿದು ಆತ್ಮವಿಶ್ವಾಸದಿಂದ ಬದುಕು. ಆಗಬಾರದ್ದು ಈ ಜಗತ್ತಿನಲ್ಲಿ ಎಂದೂ ಆಗುವುದಿಲ್ಲ, ಆಗುವುದನ್ನು ಯಾರಿಂದಲೂ ತಡೆಯಲು ಸಾಧ್ಯವಿಲ್ಲ. ನಮ್ಮ ರಕ್ಷಣೆಯ ಭಾರ ಸರ್ವನಿಯಾಮಕ ಭಗವಂತನದು. ಹೀಗಿರುವಾಗ ಭಯವೇಕೆ?

(೨೪) ಶೌಚಮ್: ಈ ವಿಷಯವಾಗಿ ಹಿಂದಿನ ಅಧ್ಯಾಯಗಳಲ್ಲಿ ಅನೇಕ ಬಾರಿ ಚರ್ಚಿಸಿದ್ದೇವೆ. ಶೌಚ ಎಂದರೆ ಒಳಗೂ ಹೊರಗೂ ಸ್ವಚ್ಛವಾಗಿರುವುದು. ಸಮಾಜದಲ್ಲಿ ನಮ್ಮಿಂದಾಗಿ ಇತರರಿಗೆ ತೊಂದರೆಯಾಗಬಾರದು. ನಮ್ಮ ಮೈಮನ ಸ್ವಚ್ಛವಾಗಿರುವಂತೆ ನಾವು ನೋಡಿಕೊಳ್ಳಬೇಕು. ಇದಕ್ಕಾಗಿ ಹಿಂದಿನ ಕಾಲದಲ್ಲಿ ಪ್ರತಿದಿನ ಶುಭ್ರವಾದ ಗರಿ-ಗರಿಯಾದ ಬಟ್ಟೆಯನ್ನು ಧರಿಸುತ್ತಿದ್ದರು, ಮೈ ವಾಸನೆ ಬರಬಾರದು ಎಂದು ಮೃತ್ತಿಕಾ ಸ್ನಾನ ಮಾಡುತ್ತಿದ್ದರು, ಮೈಗೆ ಗಂಧವನ್ನು ಬಳಿದುಕೊಳ್ಳುತ್ತಿದ್ದರು. ನಮ್ಮಿಂದಾಗಿ ಇನ್ನೊಬ್ಬರು 'ಅಯ್ಯೋ' ಎಂದು ಮೂಗು ಮುರಿಯುವಂತೆ ನಾವಿರಬಾರದು. ನಮ್ಮ ಮನಸ್ಸು ಸ್ವಚ್ಛವಾಗಿರಬೇಕು. ಒಳ್ಳೆಯ ಬಟ್ಟೆ ತೊಟ್ಟು,

ಮನಸ್ಸಿನಲ್ಲಿ ಕಶ್ಮಲ ತುಂಬಿಕೊಂಡಿದ್ದರೆ ನಾವು ನಮಗರಿವಿಲ್ಲದಂತೆ ನಮ್ಮ ಸುತ್ತಮುತ್ತಲಿನ ವಾತಾವರಣವನ್ನು ಕೆಡಿಸುತ್ತೇವೆ. ಇದಕ್ಕಾಗಿ ಒಳಗೂ ಹೊರಗೂ ಸ್ವಚ್ಛವಾಗಿರಬೇಕು.

(೨೫) ಅದ್ರೋಹಃ: ಇನ್ನೊಬ್ಬರ ಬಗ್ಗೆ ದ್ರೋಹ ಚಿಂತನೆ ಮಾಡದಿರುವುದು. ಇನ್ನೊಬ್ಬರಿಗೆ ಎರಡೆಣಿಸಬೇಡ. ಇನ್ನೊಬ್ಬರಿಗೆ ಕೆಟ್ಟದಾಗಲಿ ಎಂದು ಕನಸಿನಲ್ಲೂ ಬಯಸಬೇಡ.

(೨೬) ನಾತಿಮಾನಿತಾ: 'ಅತಿಮಾನ' ಅಂದರೆ ನನ್ನ ಬಗ್ಗೆ ನಾನು ಅತಿಯಾದ ಹೆಗ್ಗಳಿಕೆ ಕಲ್ಪಿಸಿಕೊಂಡು ಬೀಗುವುದು. ಕೃಷ್ಣ ಹೇಳುತ್ತಾನೆ: "ನಿನ್ನ ಬಗ್ಗೆ ನೀನು ಎಂದೂ ಅತಿಯಾದಂತಹ ಅಹಂಕಾರ ತಾಳಬೇಡ" ಎಂದು. ಈ ಗುಣಕ್ಕೆ  ಶ್ರೀರಾಮಚಂದ್ರನ ಜೀವನ ಉತ್ತಮ ದೃಷ್ಟಾಂತ. ವಾಲ್ಮೀಕಿ-ರಾಮಾಯಣದಲ್ಲಿ ಹೇಳುತ್ತಾರೆ: "ವೀರ್ಯವಾನ್ ನಚ ವೀರ್ಯೇನ ಮಹತಾ ಸ್ವೇನ ವಿಸ್ಮಿತಃ"||೨-೧-೧೩|| ಎಂದು. ಅಸಾಧಾರಣ ಪೌರುಷೇಯನಾಗಿದ್ದ  ರಾಮ ಎಂದೂ "ನಾನು ಮಹಾವೀರ" ಎಂದು ಅಹಂಕಾರ ಪಡದೆ, ಒಬ್ಬ ಸಾಮಾನ್ಯ ಮಾನವನಂತೆ ಬದುಕಿ ತೋರಿಸಿದ. ಇದು ಬಹು ದೊಡ್ಡ ಗುಣ.

ಹೀಗೆ ನಾವು ಜೀವನದಲ್ಲಿ ಅಳವಡಿಸಿಕೊಳ್ಳಬೇಕಾದ ಇಪ್ಪತ್ತಾರು ಗುಣಗಳನ್ನು ಹೇಳಿ ಕೃಷ್ಣ ಹೇಳುತ್ತಾನೆ: "ಭವಂತಿ ಸಂಪದಂ ದೈವೀಮಭಿಜಾತಸ್ಯ ಭಾರತ" ಎಂದು. ಇಲ್ಲಿ 'ಅಭಿ' ಅಂದರೆ 'ಬಯಸಿ' ಎನ್ನುವ ಅರ್ಥವನ್ನು ಕೊಡುತ್ತದೆ. "ದೈವೀ ಸಂಪತ್ತನ್ನು ಬಯಸಿ ಹುಟ್ಟಿದವನಲ್ಲಿ ಈ ಗುಣಗಳಿರುತ್ತವೆ". ಅಂದರೆ ಯಾರು ಹುಟ್ಟುವಾಗಲೇ ಸಾತ್ವಿಕತೆಯ ಅಭಿಲಾಷೆಯನ್ನು ಇಟ್ಟುಕೊಂಡು ಹುಟ್ಟುತ್ತಾರೋ ಅವರಿಗೆ ಸಹಜವಾಗಿ ಈ ಗುಣಗಳಿರುತ್ತವೆ. ಇವು ದೈವೀ ಸಂಪತ್ತು. ಮಾನವನು ಬೆಳಸಿಕೊಳ್ಳಬೇಕಾದ ಮಾನಸಿಕ ಸಂಪತ್ತು(**Divine Wealth).**

ಡಂಭೋ ದರ್ಪೋ ಅತಿಮಾನಶ್ಚ ಕ್ರೋಧಃ ಪಾರುಷ್ಯಮೇವ ಚ।
ಅಜ್ಞಾನಂ ಚಾಭಿಜಾತಸ್ಯ ಪಾರ್ಥ ಸಂಪದಮಾಸುರೀಮ್ ॥೪॥

ಡಂಭಃ ದರ್ಪಃ ಅಭಿಮಾನಃ ಚ ಕ್ರೋಧಃ ಪಾರುಷ್ಯಮ್ ಏವ ಚ ।
ಅಜ್ಞಾನಮ್ ಚ ಅಭಿಜಾತಸ್ಯ ಪಾರ್ಥ ಸಂಪದಮ್ ಆಸುರೀಮ್–ಪಾರ್ಥಾ, ಆಸುರೀ ಸಂಪತ್ತು [ಕೆಟ್ಟ ನಡತೆ] ಹೊತ್ತು ಬಂದವನ ಗುಣಗಳು ಇವು: ಬೂಟಾಟಿಕೆ, ಸೊಕ್ಕು, ಬಿಂಕ, ಸಿಡುಕು, ಒರಟುತನ ಮತ್ತು ತಿಳಿಗೇಡಿತನ.

ಮೇಲೆ ಹೇಳಿದ ಇಪ್ಪಾತ್ತಾರು ದೈವೀಗುಣಕ್ಕೆ ವಿರುದ್ಧವಾಗಿ ಆರು ಆಸುರೀ ಗುಣಗಳನ್ನು ಕೃಷ್ಣ ಈ ಶ್ಲೋಕದಲ್ಲಿ ಹೇಳಿದ್ದಾನೆ:

(೧) ಡಂಭ(ಇಲ್ಲದ್ದನ್ನು ಇದೆ ಎಂದು ತೋರಿಸಿಕೊಳ್ಳುವುದು): ಒಳಗಡೆ ಏನಿಲ್ಲವೋ ಅದು ಇದೆ ಎನ್ನುವಂತೆ ಸುಭಗತನದ ಪ್ರದರ್ಶನ; ಒಳಗಿರುವ ಕೆಟ್ಟತನವನ್ನು ಮುಚ್ಚಿಟ್ಟು ತುಂಬಾ ಒಳ್ಳೆಯವರ ಹಾಗೆ ಪ್ರದರ್ಶನ ಮಾಡುವುದು, ಇತ್ಯಾದಿ ಡಂಭ ಎನಿಸುತ್ತದೆ. ಇದು ಮೇಲೆ ಹೇಳಿದ ಆರ್ಜವಂ ಎನ್ನುವ ಸದ್ಗುಣದ ವಿರುದ್ಧ ಗುಣ.

(೨) ದರ್ಪ: ಏನು ತಪ್ಪು ಮಾಡಲೂ ಹೇಸದ ಮನೋವೃತ್ತಿ. ಇದು ಹ್ರೀ ಎನ್ನುವ ಸದ್ಗುಣದ ವಿರುದ್ಧ ಗುಣ.

**(೩) ಅತಿಮಾನ(Over Estimation of Self): ತನ್ನ ಬಗ್ಗೆ ಅತಿರೇಕದ ಕಲ್ಪನೆ; ನಾನೇ ದೊಡ್ಡ ಮನುಷ್ಯ ಎಂದು ಭ್ರಮಿಸಿಕೊಂಡು ಇನ್ನೊಬ್ಬರಿಗೆ ಅಗೌರವ ತೋರುವುದು; ಎಲ್ಲರೂ ತನ್ನ ಕಾಲನ್ನು ಹಿಡಿಯಬೇಕು ಎಂದು ಅಪೇಕ್ಷಿಸುವುದು-ಇವು ಅತಿಮಾನವೆನಿಸುತ್ತವೆ.**

**(೪) ಕ್ರೋಧ : ಮನುಷ್ಯ ಬಿಡಬೇಕು ಎಂದರೂ ಬಿಡಲಾಗದ ಕೆಟ್ಟಗುಣ ಕ್ರೋಧ. ಇದು ನಮಗೆ ಗೊತ್ತಿಲ್ಲದಂತೆ ನಮ್ಮನ್ನು ದಾರಿತಪ್ಪಿಸುವ ದುರ್ಗುಣ.**

**(೫) ಪಾರುಷ್ಯ : ಉಗ್ರವಾದ, ಅಸಹ್ಯವಾದ ಮಾತು; ಇನ್ನೊಬ್ಬರನ್ನು ತಾತ್ಸಾರದಿಂದ ಮಾತನಾಡಿಸುವುದು, ಇತ್ಯಾದಿ ಪಾರುಷ್ಯಕ್ಕೆ ಉದಾಹರಣೆ.**

**(೬) ಅಜ್ಞಾನ : ಮೇಲಿನ ಎಲ್ಲಾ ದುರ್ಗುಣಗಳ ಚಕ್ರವರ್ತಿ ಈ ಅಜ್ಞಾನ. ನಿಜವಾದ ಜ್ಞಾನಿ ಎಂದೂ ಈ ಕೆಟ್ಟ ಗುಣಗಳ ದಾಸನಾಗುವುದಿಲ್ಲ.**

**ಈ ಎಲ್ಲಾ ಆಸುರೀ ಗುಣಗಳು ನಮ್ಮಲ್ಲಿ ಮನೆ ಮಾಡಿ ನಮ್ಮನ್ನೇ ಹೊರ ಹಾಕುತ್ತವೆ. ಆದ್ದರಿಂದ ಈ ದುರ್ಗುಣಗಳನ್ನು ನಾವು ಮೊದಲು ಹೊರ ಹಾಕಬೇಕು. ಕುರಾನಿನಲ್ಲಿ ಇದನ್ನು- "Drive them out from where you have been driven out" ಎಂದು ಸುಂದರವಾಗಿ ಹೇಳಿದ್ದಾರೆ. ನಿನ್ನನ್ನು ಹೊರಹಾಕಿ, ನಿನ್ನೊಳಗೆ ಕೂತು ನಿನ್ನನ್ನು ಹಾಳು ಮಾಡುತ್ತಿರುವ ಈ ದುರ್ಗುಣಗಳನ್ನು ಮೊದಲು ಹೊರಹಾಕು ಎನ್ನುತ್ತಾರೆ. ಇದನ್ನೇ ವೇದದಲ್ಲಿ ಹೀಗೆ ಹೇಳಿದ್ದಾರೆ: "ಯೊ ಅಸ್ಮಾನ್ ದ್ವೇಷ್ಟಿ ಯಾಮ್ ವಯಮ್ ದ್ವಿಷ್ಮಃ" ..||ಅಥರ್ವ ೩-೨೭-೧||- ಅಂದರೆ- "ಯಾರು ನಮ್ಮನ್ನು ದ್ವೇಶಿಸುತ್ತಾರೋ, ಯಾರನ್ನು ನಾವು ದ್ವೇಷ ಮಾಡುತ್ತೇವೋ ಅಂತಹ ಶತ್ರುವನ್ನು ಒದ್ದೋಡಿಸು" ಎಂದರ್ಥ. ಇಲ್ಲಿ ಶತ್ರು ಎಂದರೆ ನಮ್ಮ ಅಂತಃಶತ್ರುಗಳಾದ ಈ ದುರ್ಗುಣಗಳು.**

**ಈ ಶ್ಲೋಕದಲ್ಲಿ 'ಪಾರ್ಥ' ಎನ್ನುವ ವಿಶೇಷಣವನ್ನು ಬಳಸಲಾಗಿದೆ. 'ನಾವು ದುರ್ಗುಣಗಳಿಂದ ದೂರ ಸರಿದು, ಜ್ಞಾನ ಮಾರ್ಗದಲ್ಲಿ ಸಾಗಿ, ಯಥಾರ್ಥ ಬದುಕನ್ನು ಬದುಕುವ ಪಾರ್ಥರಾಗಬೇಕು' ಎನ್ನುವ ಸಂದೇಶ ಈ ವಿಶೇಷಣದ ಹಿಂದಿದೆ.**

ದೈವೀ ಸಂಪದ್ ವಿಮೋಕ್ಷಾಯ ನಿಬಂಧಾಯಾಽಸುರೀ ಮತಾ ।
ಮಾ ಶುಚಃ ಸಂಪದಂ ದೈವೀಮಭಿಜಾತೋಽಸಿ ಪಾಂಡವ ॥೫॥

ದೈವೀ ಸಂಪತ್ ವಿಮೋಕ್ಷಾಯ ನಿಬಂಧಾಯ ಆಸುರೀ ಮತಾ ।
ಮಾ ಶುಚಃ ಸಂಪದಮ್ ದೈವೀಮ್ ಅಭಿಜಾತಃ ಅಸಿ ಪಾಂಡವಾ –ಒಳ್ಳೆಯ ನಡತೆ ಬಿಡುಗಡೆಯ ದಾರಿ. ಕೆಡುನಡೆ ತಮಸ್ಸಿನ ಸೆರೆಯ ದಾರಿ. ಪಾಂಡವ, ಕೊರಗಬೇಡ. ನೀನು ಒಳಿತಿನ ದಾರಿಯನ್ನು ಮೈಗೂಡಿಸಿಕೊಂಡವನು.

ಏಕೆ ದೈವೀ ಸಂಪತ್ತನ್ನು ನಾವು ಬೆಳಸಿಕೊಳ್ಳಬೇಕು ಎನ್ನುವುದನ್ನು ಕೃಷ್ಣ ವಿವರಿಸುತ್ತಾ ಹೇಳುತ್ತಾನೆ: "ದೈವೀ ಸಂಪತ್ತು ವಿಮೋಕ್ಷಕ್ಕೆ ಕಾರಣವಾಗುತ್ತದೆ, ಆಸುರೀ ಸ್ವಭಾವ ನಿಬಂಧಕ್ಕೆ ಕಾರಣವಾಗುತ್ತದೆ" ಎಂದು. ಇಲ್ಲಿ ಕೃಷ್ಣ 'ವಿ-ಮೋಕ್ಷ' ಮತ್ತು 'ನಿ-ಬಂಧ' ಎಂದು ವಿಶೇಷವಾಗಿ ಹೇಳಿದ್ದಾನೆ. ವಿ-ಮೋಕ್ಷ ಎಂದರೆ ಅವರವರ ಸಾಧನೆಗೆ

ತಕ್ಕಂತೆ ವಿವಿಧ ಸ್ಥರದಲ್ಲಿ ವ್ಯಕ್ತಿತ್ವ ವಿಕಾಸ ಮತ್ತು ಮೋಕ್ಷ. 'ನಿ-ಬಂಧ' ಎಂದರೆ ಸಂಸಾರ ಬಂಧವಲ್ಲ. ಇದು ನೀಚ ಬಂಧ. ನಮ್ಮನ್ನು ಕತ್ತಲೆಯ ತಮಸ್ಸಿಗೆ ತಳ್ಳುವ ಬಂಧ.
ಕೃಷ್ಣ ಅರ್ಜುನನನ್ನು ಕುರಿತು ಹೇಳುತ್ತಾನೆ: "ನೀನು ದೈವೀ ಸಂಪತ್ತಿನ ಪೂರ್ಣಪ್ರಮಾಣದ ಆವಿಷ್ಕಾರ. ಅದಕ್ಕಾಗಿ ದೈವೀ ಸಂಪತ್ತಿನ ಮನೆಯನ್ನು ಹುಡುಕಿ ಹುಟ್ಟಿದ್ದೀಯ, ನಿನ್ನ ಸ್ವಭಾವ ಮತ್ತು ನೀನು ಹುಟ್ಟಿದ ಮನೆತನದ ಪ್ರಭಾವ ಒಂದಕ್ಕೊಂದು ಪೂರಕ, ಇದಕ್ಕಾಗಿ ಚಿಂತಿಸಬೇಡ" ಎಂದು.

ದ್ವೌ ಭೂತಸರ್ಗೌ ಲೋಕೇಽಸ್ಮಿನ್ ದೈವ ಆಸುರ ಏವ ಚ ।
ದೈವೋ ವಿಸ್ತರಶಃ ಪ್ರೋಕ್ತ ಆಸುರಂ ಪಾರ್ಥ ಮೇ ಶೃಣು ॥೬॥

ದ್ವೌ ಭೂತಸರ್ಗೌ ಲೋಕೇ ಅಸ್ಮಿನ್ ದೈವಃ ಆಸುರಃ ಏವ ಚ ।
ದೈವಃ ವಿಸ್ತರಶಃ ಪ್ರೋಕ್ತಃ ಆಸುರಮ್ ಪಾರ್ಥ ಮೇ ಶೃಣು –ಈ ವಿಶ್ವದಲ್ಲಿ ಎರಡು ಬಗೆಯ ಜೀವಸೃಷ್ಟಿಗಳಿವೆ: ದೈವ[ಒಳ್ಳೆಡೆಯದು] ಮತ್ತು ಆಸುರ [ಕೆಡುನಡೆಯದು]. ಒಳ್ನಡೆಯ ಬಗೆಯನ್ನು ಬಿತ್ತರಿಸಿ ಹೇಳಿದ್ದಾಯಿತು, ಪಾರ್ಥಾ, ಕೆಡುನಡೆಯ ಬಿತ್ತರವನ್ನು ನನ್ನಿಂದ ಕೇಳು.

ಈ ವಿಶ್ವದಲ್ಲಿ ಮೂಲಭೂತವಾಗಿ ಎರಡು ಬಗೆಯ ಮಾನವರಿದ್ದಾರೆ: ಭಗವಂತನೆಡೆಗೆ ಮುಖ ಮಾಡಿ ಸಾಗುವ ದೈವೀ ನಡೆಯುಳ್ಳವರು ಮತ್ತು ಭಗವಂತನಿಗೆ ಬೆನ್ನು ಹಾಕಿ ಸಾಗುವ ಆಸುರೀ ನಡೆಯವರು. ಈ ಎರಡು ವಿಭಾಗದಲ್ಲಿ ಇಲ್ಲಿಯ ತನಕ ದೈವೀ ಸ್ವಭಾವದ ಬಗ್ಗೆ ವಿಸ್ತಾರವಾಗಿ ನೋಡಿದೆವು. ನಮ್ಮ ಆಂತರಿಕ ಮತ್ತು ಸಾಮಾಜಿಕ ನಡೆಯ ಬಗ್ಗೆ ವಿಸ್ತಾರವಾದ ಚಿತ್ರಣ ಕೊಟ್ಟ ಬಳಿಕ ಕೃಷ್ಣ, ಇಲ್ಲಿ ಆಸುರೀ ಸ್ವಭಾವದವರ ನಡೆ-ನುಡಿಗಳ ಬಗ್ಗೆ ವಿವರಿಸುತ್ತಾನೆ. ಈ ಮೂಲಕ ನಾವು 'ಯಾವ ರೀತಿ ಇರಬಾರದು' ಎನ್ನುವುದನ್ನು ಕೃಷ್ಣ ನಮಗೆ ತಿಳಿಸಿ ಹೇಳುತ್ತಾನೆ.

ಪ್ರವೃತ್ತಿಂ ಚ ನಿವೃತ್ತಿಂ ಚ ಜನಾ ನ ವಿದುರಾಸುರಾಃ ।
ನ ಶೌಚಂ ನಾಪಿಚಾಽಚಾರೋ ನ ಸತ್ಯಂ ತೇಷು ವಿದ್ಯತೇ ॥೭॥

ಪ್ರವೃತ್ತಿಮ್ ಚ ನಿವೃತ್ತಿಮ್ ಚ ಜನಾಃ ನ ವಿದುಃ ಆಸುರಾಃ ।
ನ ಶೌಚಮ್ ನ ಅಪಿ ಚ ಆಚಾರಃ ನ ಸತ್ಯಮ್ ತೇಷು ವಿದ್ಯತೇ –ಕೆಡುನಡೆಯ ಮಂದಿ ಯಾವ ದಾರಿ ಹಿಡಿಯಬೇಕು, ಯಾವುದನ್ನು ಬಿಡಬೇಕು ಎಂಬುದನ್ನರಿಯರು. ಮಡಿಯಿಲ್ಲ; ಒಳ್ಳೆಯ ನಡೆಯಿಲ್ಲ; ಅವರಲ್ಲಿ ದಿಟದ ನುಡಿಯಿಲ್ಲ.

ಆಸುರೀ ಸ್ವಭಾವದವರ ಸಾಮಾಜಿಕ ನಡೆ-ನುಡಿಯನ್ನು ಕೃಷ್ಣ ಇಲ್ಲಿ ವಿವರಿಸುತ್ತಾನೆ. ಆಸುರೀ ಸ್ವಭಾವದವರಿಗೆ ಯಾವುದು ಮಾಡಬೇಕು, ಯಾವುದು ಮಾಡಬಾರದು ಎನ್ನುವ ಎಚ್ಚರವಿರುವುದಿಲ್ಲ. ಇದರಿಂದ ಅವರು

ಮಾಡಬಾರದ್ದನ್ನೇ ಮಾಡುತ್ತಿರುತ್ತಾರೆ. ಇವರಿಗೆ ನ್ಯಾಯ ಅನ್ಯಾಯ ಯಾವುದೂ ಮುಖ್ಯವಲ್ಲ. ಹಣ ಸಂಪಾದನೆ ಮತ್ತು ಗಣ್ಯವ್ಯಕ್ತಿ ಸ್ಥಾನ ಗಳಿಸಬೇಕು ಎನ್ನುವುದು ಇವರ ಮೂಲಭೂತ ಬಯಕೆ. ಇದರಿಂದಾಗಿ ಹಣ ಸಂಪಾದನೆಯಲ್ಲಿ ನ್ಯಾಯದ ಮುಖವಿರಬೇಕು ಎನ್ನುವ ಎಚ್ಚರ ಇವರಿಗಿರುವುದಿಲ್ಲ.

ಮೂಲಭೂತವಾಗಿ ಆಸುರೀ ಸ್ವಭಾವದವರಲ್ಲಿ ನೈರ್ಮಲ್ಯವಿರುವುದಿಲ್ಲ. ಒಳ್ಳಯಮಾತು, ಒಳ್ಳೆಯ ಯೋಚನೆ, ಸ್ವಚ್ಛ ಶರೀರ ಇವರಲ್ಲಿರುವುದಿಲ್ಲ. ಇವರು ಬಾಹ್ಯವಾಗಿ ಬಹಳ ಶುದ್ಧರಂತೆ ನಾಟಕವಾಡಿಕೊಂಡು ಬದುಕುತ್ತಿರುತ್ತಾರೆ. ಇವರು ಎಂದೂ ಪ್ರಾಮಾಣಿಕರಾಗಿರುವುದಿಲ್ಲ. ಏನು ಮಾಡಿದರೂ ಅದು ತೋರಿಕೆಗಾಗಿ.

ನಮಗೆ ಕೃಷ್ಣ ಗೀತೆಯಲ್ಲಿ ಹೇಳುವ ಒಂದೊಂದು ಗುಣ ನಡತೆಗೆ ಉದಾಹರಣೆ ಮಹಾಭಾರತದಲ್ಲೇ ಸಿಗುತ್ತದೆ. ಅದಕ್ಕಾಗಿ ಗೀತೆಯನ್ನು ಮಹಾಭಾರತದ ಸಾರ ಎನ್ನುವುದು. ಆಸುರೀ ಸ್ವಭಾವಕ್ಕೆ ಅತ್ಯುತ್ತಮ ಉದಾಹರಣೆ 'ದುರ್ಯೋಧನ'.

ಈ ಆಸುರೀ ಸ್ವಭಾವದವರು ಹೇಗೆ ಸಮಾಜ ಕಂಟಕರಾಗುತ್ತಾರೆ, ಅವರ ತಿಳುವಳಿಕೆ ಏನು? ಎನ್ನುವುದನ್ನು ಈ ಅಧ್ಯಾಯದ ಮುಂದಿನ ಭಾಗದಲ್ಲಿ ಕೃಷ್ಣ ವಿಸ್ತಾರವಾಗಿ ವಿವರಿಸುತ್ತಾನೆ.

ಅಸತ್ಯಮಪ್ರತಿಷ್ಠಂ ತೇ ಜಗದಾಹುರನೀಶ್ವರಮ್ ।
ಅಪರಸ್ಪರಸಂಭೂತಂ ಕಿಮನ್ಯತ್ ಕಾಮಹೈತುಕಮ್ ॥೮॥

ಅಸತ್ಯಮ್ ಅಪ್ರತಿಷ್ಠಮ್ ತೇ ಜಗತ್ ಆಹುಃ ಅನೀಶ್ವರಮ್ ।

ಅಪರಸ್ಪರ ಸಂಭೂತಂ ಕಿಮ್ ಅನ್ಯತ್ ಕಾಮಹೈತುಕಮ್ – ಅವರು ಈ ವಿಶ್ವ ಸತ್ಯ ಸ್ವರೂಪನಾದ ಭಗವಂತನ ಕೊಡುಗೆಯಲ್ಲ [ಇದೊಂದು ಸುಳ್ಳಿನ ಕಂತೆ] ಎನ್ನುತ್ತಾರೆ. ಇದು ಭಗವಂತನಲ್ಲಿ ನೆಲೆಗೊಂಡದ್ದಲ್ಲ [ಇದಕ್ಕೆ ಇರುವೇ ಇಲ್ಲ] ಎನ್ನುತ್ತಾರೆ. ಇದನ್ನು ನಿಯಮಿಸುವ ಸರ್ವಶಕ್ತನೊಬ್ಬನಿಲ್ಲ ಎನ್ನುತ್ತಾರೆ. ಒಂದರಿಂದ ಇನ್ನೊಂದು ಕ್ರಮವಾಗಿ ಹುಟ್ಟಿತು ಎನ್ನುವುದನ್ನೂ ಒಪ್ಪುವುದಿಲ್ಲ. ಮತ್ತೇನು? ಅವರ ದೃಷ್ಟಿಯಲ್ಲಿ ಇದೊಂದು ಬೇರೆಯ ತರ. ಇದೊಂದು ಕಾಮದ ಕೂಸು-ಮಾಯಾಸೃಷ್ಟಿ.

ಅಸುರರಲ್ಲಿ ಎರಡು ವಿಧ. ಜಗತ್ತಿಗೆ ಇನ್ನೊಂದು ಸತ್ಯವಿಲ್ಲ, ಜಗತ್ತಿಗೆ ಇನ್ನೊಂದು ಪ್ರತಿಷ್ಠೆ ಇಲ್ಲ, ಜಗತ್ತಿಗೆ ಇನ್ನೊಬ್ಬ ಈಶ್ವರನಿಲ್ಲ ಎನ್ನುವ ನಾಸ್ತಿಕ ತಿಳುವಳಿಕೆ ಇವರಿಗಿರುತ್ತದೆ. ಜಗತ್ತನ್ನು ಸೃಷ್ಟಿ-ಸ್ಥಿತಿ-ಸಂಹಾರಗಳಿಗೆ ಒಳಪಡಿಸುವ ಶಕ್ತಿ(ಸತ್ಯ) ಇಲ್ಲ ಎಂದು ಇವರು ತಿಳಿದಿರುತ್ತಾರೆ. ಇವರು ಈ ಜಗತ್ತಿಗೆ ಆಧಾರನಾಗಿ ಒಬ್ಬ ದೇವರಿಲ್ಲ, ಆದ್ದರಿಂದ ಈ ಜಗತ್ತನ್ನು ನಿಯಂತ್ರಿಸುವ ಸ್ವಾಮಿ ಇಲ್ಲ, ಎಲ್ಲವೂ ಭ್ರಮೆ ಎಂದು ವಾದ ಮಾಡುತ್ತಾರೆ. ಸೃಷ್ಟಿಚಕ್ರ ಒಂದು ಮೂರ್ಖತನದ ಸಿದ್ಧಾಂತ ಎನ್ನುವುದು ಇವರ ನಂಬಿಕೆ.

ಇನ್ನೊಂದು ವಿಧದ ಅಸುರರು ಈ ಜಗತ್ತಿನಲ್ಲಿ ನಮಗೆ ಏನು ಕಾಣುತ್ತದೋ ಅದು ಕೇವಲ ನಮ್ಮ ಭ್ರಮೆ ಎಂದು ಶೂನ್ಯವಾದ ಮಾಡುವವರು. ಇವರು ಈ ಪ್ರಪಂಚ ನಮ್ಮ ಬಯಕೆಗಳಿಂದ ಬೆಳೆಯುತ್ತಿದೆಯೇ ಹೊರತು ಇನ್ನೊಂದು ಶಕ್ತಿಯಿಂದಲ್ಲ ಎಂದು ನಂಬಿರುತ್ತಾರೆ.

ಏತಾಂ ದೃಷ್ಟಿಮವಷ್ಟಭ್ಯ ನಷ್ಟಾತ್ಮಾನೋಽಲ್ಪಬುದ್ಧಯಃ ।
ಪ್ರಭವಂತ್ಯುಗ್ರಕರ್ಮಾಣಃ ಕ್ಷಯಾಯ ಜಗತೋಽಹಿತಾಃ ॥೯॥

ಏತಾಮ್ ದೃಷ್ಟಿಮ್ ಅವಷ್ಟಭ್ಯ ನಷ್ಟ ಆತ್ಮಾನಃ ಅಲ್ಪಬುದ್ಧಯಃ ।
ಪ್ರಭವಂತಿ ಉಗ್ರಕರ್ಮಾಣಃ ಕ್ಷಯಾಯ ಜಗತಃ ಅಹಿತಾಃ -ಇಂತಹ ನಿಲುವನ್ನು ನೆಚ್ಚಿಕೊಂಡು ವಿವೇಕ ಕಳೆದುಕೊಂಡ ಅರಿವುಗೇಡಿಗಳು-ಜನಾಂಗದ ಕೇಡಿಗಳು. ಒರಟು ನಡೆಯ ಇಂತವರು ಜಗದ ನಾಶಕ್ಕೆ ಕಾರಣರಾಗುತ್ತಾರೆ.

ಆಸುರ ಮನೋವೃತ್ತಿ ಬೆಳೆಸಿಕೊಳ್ಳುವ ಜನ ತಮ್ಮ ಬದುಕಿಗೆ ಅನರ್ಥವನ್ನು ತಂದುಕೊಂಡು ತಮ್ಮ ನಾಶಕ್ಕೆ ತಾವೇ ಕಾರಣರಾಗುತ್ತಾರೆ. ಇವರು ತಮ್ಮ ನಂಬಿಕೆಯೇ ತಮ್ಮನ್ನು ನಾಶ ಮಾಡುತ್ತಿದೆ, ತಾವು ಕತ್ತಲೆಯ ದಾರಿಯಲ್ಲಿ ನಡೆಯುತ್ತಿದ್ದೇವೆ ಎನ್ನುವ ಎಚ್ಚರವೂ ಇಲ್ಲದೆ ಉಗ್ರಗಾಮಿ(ಉಗ್ರಕರ್ಮಾಣಃ)ಗಳಾಗುತ್ತಾರೆ. ಇದರ ಪರಿಣಾಮ ಇವರು ಲೋಕಶತ್ರುಗಳಾಗಿ, ಲೋಕ ನಾಶಕ್ಕೆ ಕಾರಣರಾಗುತ್ತಾರೆ. ಈ ರೀತಿಯ ಮನೋವೃತ್ತಿ ಇದ್ದು-ನಮ್ಮ ನಿಮ್ಮ ನಡುವೆ ಇರುವ ಜನರೇ ಅಸುರರು.

ಕಾಮಮಾಶ್ರಿತ್ಯ ದುಷ್ಪೂರಂ ಡಂಭಮಾನಮದಾನ್ವಿತಾಃ।
ಮೋಹಾದ್ ಗೃಹೀತ್ವಾಽಸದ್ ಗ್ರಾಹಾನ್ ಪ್ರವರ್ತಂತೇಽಶುಚಿವ್ರತಾಃ ॥೧೦॥

ಕಾಮಮ್ ಆಶ್ರಿತ್ಯ ದುಷ್ಪೂರಂ ಡಂಭ ಮಾನ ಮದ ಅನ್ವಿತಾಃ।
ಮೋಹಾತ್ ಗೃಹೀತ್ವಾ ಅಸತ್ ಗ್ರಾಹಾನ್ ಪ್ರವರ್ತಂತೇ ಅಶುಚಿ ವ್ರತಾಃ -ತಣಿಯದ ಬಯಕೆಯ ಬೆನ್ನುಹತ್ತಿ ಬೂಟಾಟಿಕೆ, ಬಿಂಕ ಮತ್ತು ಸೊಕ್ಕಿಗೆ ತುತ್ತಾದವರು. ಕೊಳಕು ನಡೆಯ ಈ ಮಂದಿ ತಿಳಿಗೇಡಿತನದಿಂದ ತಪ್ಪು ಗ್ರಹಿಕೆಗಳನ್ನೇ ಕಟ್ಟಿಕೊಂಡು ಬಾಳುತ್ತಾರೆ.

ಆಸುರೀ ಸ್ವಭಾವದವರ ಬಯಕೆಗೆ ಕೊನೆ ಇರುವುದಿಲ್ಲ. ಎಷ್ಟು ಬಂದರೂ ಇನ್ನಷ್ಟರಾಸೆ. ಉದಾಹರಣೆಗೆ ಕೆಲಸವೇ ಇಲ್ಲದಾಗ ಒಂದು ಕೆಲಸದ ಆಸೆ, ಕೆಲಸ ಸಿಕ್ಕಿದಾಗ ಹೆಚ್ಚು ಸಂಬಳದ ಆಸೆ, ಸಂಬಳ ಬಂದಾಗ ಆ ಸಂಬಳ ತನ್ನ ಪಕ್ಕದ ಮನೆಯವನಿಗಿಂತ ಕಡಿಮೆ-ಅದಕ್ಕಾಗಿ ಇನ್ನೂ ಹೆಚ್ಚಿನ ಸಂಬಳದ ಆಸೆ, ದೊಡ್ಡ ಹುದ್ದೆಯ ಆಸೆ, ಹೀಗೆ ಎಷ್ಟು ಸಿಕ್ಕಿದರೂ ತೃಪ್ತಿ ಇಲ್ಲ. ಈ ದಾಹವನ್ನು ಪೂರೈಸಲು ಸಾಧ್ಯವೇ ಇಲ್ಲ. ಪುರಾಣದಲ್ಲಿ ಹೇಳುವಂತೆ ಹೇಗೆ ಪಾತಾಳವನ್ನು ಮಣ್ಣುಹಾಕಿ ಮುಚ್ಚಲು ಸಾಧ್ಯವಿಲ್ಲವೋ ಹಾಗೇ ಮನುಷ್ಯನ ಬಯಕೆಯನ್ನು ಪೂರೈಸಲು ಸಾಧ್ಯವಿಲ್ಲ. ನಮಗೆ ಎಷ್ಟೇ ಹಣ ಸಿಕ್ಕಿದರೂ ಕೂಡಾ ನಾವು ಅದರ ಬಲಬದಿಯಲ್ಲಿ ಒಂದು ಸೊನ್ನೆ ಸೇರಿಸಿಕೊಂಡು ಕಡಿಮೆಯಾಯಿತು ಎಂದು ಕೊರಗುತ್ತೇವೆ ಮತ್ತು ಸಂತೋಷವನ್ನು ಮರೆಯುತ್ತೇವೆ. ಕಠೋಪನಿಷತ್ತಿನಲ್ಲಿ- "ನಿನಗೆ ಎಷ್ಟು ಬೇಕೋ ಅಷ್ಟು ಧನವನ್ನು ಕೊಡುತ್ತೇನೆ" ಎಂದು ಯಮ ಹೇಳಿದಾಗ, ನಚಿಕೇತ ಹೇಳುತ್ತಾನೆ: "ನ ವಿತ್ತೇನ ತರ್ಪಣೀಯೋ ಮನುಷ್ಯಃ" ಎಂದು. ಅಂದರೆ "ಮನುಷ್ಯನ ಧನದ

ಬಯಕೆಯನ್ನು ಪೂರೈಸಲು ಯಾರಿಂದಲೂ ಸಾಧ್ಯವಿಲ್ಲ" ಎಂದು. ಸಾಕು ಎನ್ನುವುದು ದೈವೀ ಸ್ವಭಾವ, ಬೇಕು ಎನ್ನುವುದು ಆಸುರೀ ಸ್ವಭಾವ. ಹೀಗೆ ಆಸುರೀ ಸ್ವಭಾವದವರು ಬಯಕೆಗಳ ಬೆನ್ನುಹತ್ತಿ, ಆ ತೀರದ ಬಯಕೆಯನ್ನು ತೀರಿಸಿಕೊಳ್ಳುವುದಕ್ಕೋಸ್ಕರ ಮಾಡಬಾರದ್ದನ್ನು ಮಾಡುತ್ತಾರೆ. ಇವರ ಜೀವನವೇ ಡಂಭಾಚಾರ. ಬಿಗುಮಾನ, ದುರಹಂಕಾರ, ನಾಟಕೀಯವಾದ ಬದುಕಿನಿಂದ ಇನ್ನೊಬ್ಬರಿಗೆ ಮೋಸ ಮಾಡುವುದು. ಹೀಗೆ ನಡೆ ನುಡಿಯಲ್ಲಿ ಸ್ವಚ್ಛತೆ ಇಲ್ಲದ ಕೊಳಕು ಬದುಕು ಇವರದ್ದಾಗಿರುತ್ತದೆ.

ಚಿಂತಾಮಪರಿಮೇಯಾಂ ಚ ಪ್ರಳಯಾಂತಾಮುಪಾಶ್ರಿತಾಃ ।
ಕಾಮೋಪಭೋಗಪರಮಾ ಏತಾವದಿತಿ ನಿಶ್ಚಿತಾಃ ॥೧೧॥

ಚಿಂತಾಮ್ ಅಪರಿಮೇಯಾಂ ಚ ಪ್ರಳಯಾಂತಾಮ್ ಉಪಾಶ್ರಿತಾಃ ।
ಕಾಮ ಉಪಭೋಗ ಪರಮಾಃ ಏತಾವತ್ ಇತಿ ನಿಶ್ಚಿತಾಃ -- ಸಾವಿನ ಜೊತೆಗೇ ಅಳಿಯುವ, ಅಳೆಯಲಾಗದ ಚಿಂತೆಗೊಳಗಾದವರು. ಕಾಮದ ತೀಟೆಯೇ ಜೀವನದ ಸರ್ವಸ್ವವಾದವರು. ಜೀವನವೆಂದರೆ ಇಷ್ಟೇ ಎಂದು ನಂಬಿದವರು.

ಇವರ ಕೊರಗಿಗೆ ಕೊನೆಯೇ ಇಲ್ಲ. ಇವರು ತಮ್ಮ ಇಡೀ ಜೀವನವನ್ನು-ಇಲ್ಲದ್ದನ್ನು ಪಡೆಯುವ ಕೊರಗಿನಲ್ಲಿ ಕಳೆಯುತ್ತಾರೆ. ಇವರು ಚಿಂತೆಯ ದಾಸರಾಗುತ್ತಾರೆ. ಇವರ ಚಿಂತೆ ಪ್ರಳಯಾಂತಕ- ಸಾಯುವ ತನಕವೂ ಅವರ ಬೆನ್ನುಬಿಡದೆ ಕಾಡುತ್ತಿರುತ್ತದೆ. ಇವರು ಭೋಗಜೀವನದ ದಾಸರಾಗಿ, ಅದನ್ನು ಬಿಟ್ಟು ಇರಲಾರದ ಪರಾಧೀನತೆಯಲ್ಲಿ, ಜೀವನವೆಂದರೆ ಇಷ್ಟೇ ಎಂದು ತಿಳಿದು ಬದುಕುತ್ತಿರುತ್ತಾರೆ.

ಆಶಾಪಾಶಶತೈರ್ಬದ್ಧಾಃ ಕಾಮಕ್ರೋಧಪರಾಯಣಾಃ।
ಈಹನ್ತೇ ಕಾಮಭೋಗಾರ್ಥಮನ್ಯಾಯೇನಾರ್ಥಸಂಚಯಾನ್ ॥೧೨॥

ಆಶಾಪಾಶ ಶತೈಃ ಬದ್ಧಾಃ ಕಾಮಕ್ರೋಧಪರಾಯಣಾಃ।
ಈಹಂತೇ ಕಾಮಭೋಗಾರ್ಥ ಅನ್ಯಾಯೇನ ಅರ್ಥಸಂಚಯಾನ್ -- ನೂರಾರು ಆಸೆಗಳ ಬಲೆಯಲ್ಲಿ ಸಿಕ್ಕಿಬಿದ್ದವರು. ಹುಚ್ಚು ಹಂಬಲ-ಸಿಡುಕುಗಳಿಗೆ ತಮ್ಮನ್ನು ಮಾರಿಕೊಂಡವರು. ತೀಟೆ ತೀರಿಸಲೆಂದು ತಪ್ಪು ದಾರಿಯಿಂದ ರಾಶಿ ರಾಶಿ ಹೊನ್ನು ಬಾಚಬಯಸುವವರು.

ಇವರು ಭೋಗದ ಆಸೆಗಾಗಿ ತಮ್ಮನ್ನು ತಾವು ಆಸೆಗಳ ಪಾಶದಲ್ಲಿ ಸಿಲುಕಿ ಹಾಕಿಸಿಕೊಂಡು, ದಿಗ್ಬಂಧನದಿಂದ ಬದುಕುತ್ತಿರುತ್ತಾರೆ. ಕಾಮ ಕ್ರೋಧಗಳಿಗೆ ತಮ್ಮನ್ನು ಮಾರಿಕೊಂಡು, ಕಾಮಕ್ರೋಧ ಪರಾಯಣರಾಗಿ ಬದುಕುತ್ತಾರೆ. ಇದಕ್ಕೆ ಉತ್ತಮ ದೃಷ್ಟಾಂತ ಪೌಂಡ್ರಕ ವಾಸುದೇವ. ಆತನಿಗೆ 'ತಾನೇ ದೇವರಾಗಬೇಕು ಎನ್ನುವ ಕಾಮ'. ಈ ಕಾಮದಿಂದಾಗಿ ಅದು ಸರಿಯಲ್ಲ ಎಂದು ತಿಳಿಹೇಳುವ ತತ್ತ್ವಜ್ಞಾನಿಗಳ ಮೇಲೆ ಕೋಪ.

ಇವರು ತಮ್ಮ ಸುಖ-ಭೋಗವನ್ನು ತೀರಿಸಿಕೊಳ್ಳಲು ಅನ್ಯಾಯ ಮಾರ್ಗದಲ್ಲಿ ದುಡ್ಡು ಸಂಗ್ರಹ ಮಾಡಲು ಪ್ರಯತ್ನಿಸುತ್ತಿರುತ್ತಾರೆ. ಶಾಸ್ತ್ರದಲ್ಲಿ ಬರೆದಿರುವ ವಿಷಯಗಳನ್ನು ತಮಗೆ ಬೇಕಾದಂತೆ ತಿರುಚಿಕೊಂಡು, ತಮ್ಮ ಇಷ್ಟಸಿದ್ಧಿ ಸಾಧನೆಯಲ್ಲಿ ತೊಡಗುತ್ತಾರೆ.

ಇದಮದ್ಯ ಮಯಾ ಲಬ್ಧಮಿಮಂ ಪ್ರಾಪ್ಸ್ಯೇ ಮನೋರಥಮ್ ।
ಇದಮಸ್ತೀದಮಪಿ ಮೇ ಭವಿಷ್ಯತಿ ಪುನರ್ಧನಮ್ ॥೧೩॥

ಅಸೌ ಮಯಾ ಹತಃ ಶತ್ರುರ್ಹನಿಷ್ಯೇ ಚಾಪರಾನಪಿ ।
ಈಶ್ವರೋಽಹಮಹಂ ಭೋಗೀ ಸಿದ್ಧೋಽಹಂ ಬಲವಾನ್ ಸುಖೀ॥೧೪॥

ಆಢ್ಯೋಽಭಿಜನವಾನಸ್ಮಿ ಕೋಽನ್ಯೋಽಸ್ತಿ ಸದೃಶೋಮಯಾ ।
ಯಕ್ಷ್ಯೇ ದಾಸ್ಯಾಮಿ ಮೋದಿಷ್ಯ ಇತ್ಯಜ್ಞಾನವಿಮೋಹಿತಾಃ ॥೧೫॥

ಇದಮ್ ಅದ್ಯ ಮಯಾ ಲಬ್ಧಮ್ ಇಮಮ್ ಪ್ರಾಪ್ಸ್ಯೇ ಮನೋರಥಮ್ ।
ಇದಮ್ ಅಸ್ತಿ ಇದಮ್ ಅಪಿ ಮೇ ಭವಿಷ್ಯತಿ ಪುನರ್ಧನಮ್ ॥
ಅಸೌ ಮಯಾ ಹತಃ ಶತ್ರುಃ ಹನಿಷ್ಯೇ ಚ ಅಪ ರಾನ್ ಅಪಿ ।
ಈಶ್ವರಃ ಅಹಮ್ ಅಹಮ್ ಭೋಗೀ ಸಿದ್ಧಃ ಅಹಂ ಬಲವಾನ್ ಸುಖೀ ॥
ಆಢ್ಯೋ ಅಭಿಜನವಾನ್ ಅಸ್ಮಿ ಕಃ ಅನ್ಯಃ ಅಸ್ತಿ ಸದೃಶಃ ಮಯಾ ।
ಯಕ್ಷ್ಯೇ ದಾಸ್ಯಾಮಿ ಮೋದಿಷ್ಯೇ ಇತಿ ಅಜ್ಞಾನ ವಿಮೋಹಿತಾಃ -ಅವರು ತಿಳಿಗೇಡಿತನದಿಂದ ಹೀಗೆ ಬಡಬಡಿಸುತ್ತಾರೆ: ಇದನ್ನೀಗ ನಾನು ಪಡೆದೆ; ಈ ಬಯಕೆಯನ್ನು ಮುಂದೆ ಈಡೇರಿಸಿಕೊಳ್ಳುತ್ತೇನೆ; ಇದಂತೂ ಇದೆ; ಮತ್ತೆ ಈ ಹೊನ್ನೂ ನನ್ನದಾಗಲಿದೆ; ಈ ಹಗೆಯನ್ನು ಕೊಂದೆ; ಉಳಿದವರನ್ನೂ ಮುಗಿಸಲಿದ್ದೇನೆ; ನಾನು ಸರ್ವಶಕ್ತ; ನಾನೇ ಭೋಗಿಸುವವನು; ನಾನೇ ಬಯಸಿದ್ದನ್ನೆಲ್ಲಾ ಪಡೆದವನು; ಶಕ್ತಿಶಾಲಿ ಮತ್ತು ಸುಖಿ; ಸಿರಿವಂತನಿದ್ದೇನೆ; ಕುಲವಂತನಿದ್ದೇನೆ; ಯಾರಿದ್ದಾರೆ ನನಗೆ ಸಾಟಿ? ನಾನು ಯಾಗ ಮಾಡಿಸುತ್ತೇನೆ. ದಾನ ನೀಡುತ್ತೇನೆ. ಖುಶಿಪಡುತ್ತೇನೆ.

ಆಸುರೀ ಸ್ವಭಾವದವರ ಯೋಚನೆಗಳು ಹೇಗಿರುತ್ತವೆ ಎನ್ನುವುದನ್ನು ಕೃಷ್ಣ ಈ ಮೂರು ಶ್ಲೋಕದಲ್ಲಿ ವಿವರಿಸಿದ್ದಾನೆ. ಇವರಿಗೆ ಸದಾ ಧನ ಸಂಗ್ರಹ ಮಾಡಬೇಕು ಎನ್ನುವ ಯೋಚನೆ. ಸಿಕ್ಕಿದಾಗ 'ಇಂದು ಇಷ್ಟು ಸಿಕ್ಕಿತು, ನಾಳೆ ಇಷ್ಟು ಗಳಿಸುತ್ತೇನೆ' ಎನ್ನುವ ಚಪಲ. ದುಡ್ಡು ಸಂಗ್ರಹ ಮಾಡುವುದು ಇವರಿಗೊಂದು ಚಟ. ತನಗೆ ಆಗದವನನ್ನು ಮುಗಿಸಿದೆ, ಇನ್ನು ಆಗದವರನ್ನು ಮುಗಿಸುವೆ ಎನ್ನುವ ಯೋಚನೆ. ನಾನೇ ಸರ್ವ ಸಮರ್ಥ, ನನ್ನಿಂದಾಗದ್ದು ಈ ಜಗತ್ತಿನಲ್ಲೇನಿದೆ? ನಾನು ಸುಖ ಪಡಲು ಹುಟ್ಟಿದವನು-ದುಃಖಪಡಲಿಕ್ಕಲ್ಲ; ನನ್ನ ಸುಖಕ್ಕಾಗಿ ಏನು ಬೇಕಾದರೂ ನಾನು ಮಾಡುತ್ತೇನೆ; ಅದಕ್ಕೆ ಅಡ್ಡ ಬರುವವರನ್ನು ಮುಗಿಸುತ್ತೇನೆ; ನಾನೇ ಸಿದ್ಧ ಪುರುಷ;

ನನ್ನ ಸಿದ್ಧಿಗೆ ನಾನೇ ಹೊಣೆಗಾರ; ನಾನು ಸುಖಪಡಲು ಹುಟ್ಟಿದವ ಅದಕ್ಕೆ ಬೇಕಾದ ಜನ-ಧನ-ಅಧಿಕಾರ ನನ್ನಲ್ಲಿದೆ; ನನ್ನಿಚ್ಛೆಯಂತೆ ನಾನು ನಡೆದುಕೊಳ್ಳುತ್ತೇನೆ; ದುಡ್ಡಿನಿಂದ ಏನನ್ನಾದರೂ ಖರೀದಿಸಬಲ್ಲೆ; ನನಗೆ ಸರಿಸಾಟಿ ಈ ಜಗತ್ತಿನಲ್ಲಿ ಯಾರಿದ್ದಾರೆ? - ಇತ್ಯಾದಿ ಇವರ ಯೋಚನೆಗಳು. ತೋರಿಕೆಗಾಗಿ ಯಜ್ಞ ಯಾಗಾದಿಗಳನ್ನು ಮಾಡುವುದು, ದಾನ ನೀಡುವುದು ಇವರ ನಿರಂತರ ಚಟುವಟಿಕೆ. ಇದು ಅಜ್ಞಾನದ ನಾಟ್ಯ. ಇದು ಅವರ ಸರ್ವನಾಶದ ಹೆಬ್ಬಾಗಿಲು ಎನ್ನುವ ಪರಿವೇ ಅವರಿಗಿರುವುದಿಲ್ಲ. ಅದೇ ದೊಡ್ಡಸ್ತಿಕೆ, ಅದೇ ಸುಭಗತನ ಎನ್ನುವ ಭ್ರಮೆಯಲ್ಲಿ ಇವರು ಬದುಕುತ್ತಿರುತ್ತಾರೆ.

ಅನೇಕಚಿತ್ತವಿಭ್ರಾಂತಾ ಮೋಹಜಾಲಸಮಾವೃತಾಃ ।
ಪ್ರಸಕ್ತಾಃ ಕಾಮಭೋಗೇಷು ಪತಂತಿ ನರಕೇऽಶುಚೌ ॥೧೬॥

ಅನೇಕ ಚಿತ್ತ ವಿಭ್ರಾಂತಾಃ ಮೋಹಜಾಲ ಸಮಾವೃತಾಃ ।
ಪ್ರಸಕ್ತಾಃ ಕಾಮಭೋಗೇಷು ಪತನ್ತಿ ನರಕೇ ಅಶುಚೌ -ಹಲವು ಬಗೆಯ ಯೋಚನೆಗಳಿಂದ ಗೊಂದಲಗೊಂಡವರು; ಮೋಹದ ಬಲೆಯಲ್ಲಿ ಸಿಕ್ಕಿಕೊಂಡವರು; ಕಾಮದ ತೀಟೆಗಳಲ್ಲಿ ಮೈಮರೆತವರು. ಅವರು ಕೊಳಕು ನರಕದಲ್ಲಿ ಬಿದ್ದು ನರಳುತ್ತಾರೆ.

ಇವರು ತಮ್ಮ ಜೀವನದಲ್ಲಿ ಹಿಂದೆ ಆಗಿಹೋದ ಘಟನೆಗಳನ್ನು ಸದಾ ನೆನಪಿಸಿಕೊಂಡು ಗೊಂದಲಗೊಳ್ಳುತ್ತಾರೆ. ಇವರು ಎಂದೂ ತಮ್ಮ ತಪ್ಪಿಗೆ ಪಶ್ಚಾತ್ತಾಪ ಪಡುವುದಿಲ್ಲ. ಸಾತ್ವಿಕರು ಪಶ್ಚಾತ್ತಾಪ ಪಟ್ಟು ತಪ್ಪನ್ನು ಸರಿಪಡಿಸಿಕೊಳ್ಳುತ್ತಾರೆ, ಆದರೆ ಇವರು ಸದಾ ಭಯಂಕರವಾದ ಅಜ್ಞಾನ-ಮಮಕಾರವೆಂಬ ಮೋಹದ ಬಲೆಯಲ್ಲಿ ಸಿಕ್ಕಿಹಾಕಿಕೊಂಡು ಮತ್ತಷ್ಟು ಗೊಂದಲಕ್ಕೊಳಗಾಗುತ್ತಾರೆ-ತಿದ್ದಿಕೊಳ್ಳುವುದಿಲ್ಲ. ತಾವು ಬಯಸಿದ ವಸ್ತುವನ್ನು ಭೋಗಿಸುವುದು ಮತ್ತು ಅದರಲ್ಲಿ ತೃಪ್ತಿಪಡದೆ ಮತ್ತಷ್ಟು ಸಂಗ್ರಹಮಾಡಿ ಜೋಪಾನ ಮಾಡುವುದರಲ್ಲಿ ಪ್ರವೃತ್ತರಾಗುತ್ತಾರೆ. ಇವರು ಮುಂದೆ ಕೊಳಕು ನರಕದಲ್ಲಿ ಬಿದ್ದು ಒದ್ದಾಡಬೇಕಾಗುತ್ತದೆ.

ಆತ್ಮಸಂಭಾವಿತಾಃ ಸ್ತಬ್ಧಾ ಧನಮಾನಮದಾನ್ವಿತಾಃ ।
ಯಜಂತೇ ನಾಮಯಜ್ಞೈಸ್ತೇ ಡಂಭೇನಾವಿಧಿಪೂರ್ವಕಮ್ ॥೧೭॥

ಆತ್ಮಸಂಭಾವಿತಾಃ ಸ್ತಬ್ಧಾಃ ಧನ ಮಾನಮ್ ಮದ ಅನ್ವಿತಾಃ ।
ಯಜಂತೇ ನಾಮಯಜ್ಞೈಃ ತೇ ಡಂಭೇನ ಅವಿಧಿ ಪೂರ್ವಕಮ್ -ತಮ್ಮ ಬಗೆಗೇ ಕೊಚ್ಚಿಕೊಳ್ಳುವವರು. ಸಿರಿ ಸಮ್ಮಾನದ ಸೊಕ್ಕಿನಿಂದ ಬೀಗಿದವರು. ಅಂತವರೂ ಯಜ್ಞಗಳನ್ನಾಚರಿಸುತ್ತಾರೆ: ಬೂಟಾಟಿಕೆಯಿಂದ, ಶಾಸ್ತ್ರದ ಕಟ್ಟಳೆಯ ಕಟ್ಟು ಮುರಿದು.
ತಮ್ಮ ಬಗ್ಗೆ ತಮಗೇ ಹೆಗ್ಗಳಿಕೆ ಇವರಿಗೆ. "ಅವಿದ್ಯಾಯಾಂ ಅಂತರೇ ವರ್ತಮಾನಾಃ ಸ್ವಯಂ ಧೀರಾ ಪಂಡಿತಂ ಅನ್ಯಮಾನಾ" ಎನ್ನುವಂತೆ ಉಳಿದವರಿಗೆ ತಮ್ಮ ಮೇಲೆ ಗೌರವ ಇದೆಯೊ ಇಲ್ಲವೋ ಗೊತ್ತಿಲ್ಲ, ಆದರೆ ತನ್ನ ಬಗ್ಗೆ

ತಾನೇ ಮಹತ್ವ ಜ್ಞಾನ ಬೆಳಸಿಕೊಂಡು ಅದರಿಂದ ಬಿಗುಮಾನದಿಂದ ಬೀಗುತ್ತಿರುತ್ತಾರೆ. ಇವರ ಈ ಬಿಗುಮಾನಕ್ಕೆ ಕಾರಣ ಜ್ಞಾನವಲ್ಲ, ಬದಲಿಗೆ ಕೈಯಲ್ಲಿರುವ ದುಡ್ಡಿನ ಮದ; ಆ ದುಡ್ಡಿಗೋಸ್ಕರ ಜನ ಮಾಡುವ ಸಮ್ಮಾನ. ಇವರು ಬೂಟಾಟಿಕೆಗಾಗಿ, ದೊಡ್ಡಸ್ತಿಕೆಯ ಪ್ರದರ್ಶನಕ್ಕಾಗಿ-ಯಜ್ಞ ಯಾಗಾದಿಗಳನ್ನು ಮಾಡಿಸುತ್ತಾರೆ. ಅಲ್ಲಿ ಶಾಸ್ತ್ರದ ಎಚ್ಚರವಿರುವುದಿಲ್ಲ; ಭಗವಂತ ಪ್ರೀತನಾಗಲಿ ಎನ್ನುವ ಉದ್ದೇಶವಿಲ್ಲದ, ಅಂತರ್ಯಾಮಿ ಭಗವಂತನನ್ನು ಮರೆತು ಮಾಡುವ ಪೂಜೆ ಅದಾಗಿರುತ್ತದೆ.

ಅಹಂಕಾರಂ ಬಲಂ ದರ್ಪಂ ಕಾಮಂ ಕ್ರೋಧಂ ಚ ಸಂಶ್ರಿತಾಃ ।
ಮಾಮಾತ್ಮಪರದೇಹೇಷು ಪ್ರದ್ವಿಷಂತೋಽಭ್ಯಸೂಯಕಾಃ ೧೮॥

ಅಹಂಕಾರಂ ಬಲಂ ದರ್ಪಂ ಕಾಮಂ ಕ್ರೋಧಂ ಚ ಸಂಶ್ರಿತಾಃ ।
ಮಾಮ್ ಆತ್ಮ ಪರದೇಹೇಷು ಪ್ರದ್ವಿಷಂತಃ ಅಭ್ಯಸೂಯಕಾಃ –ಹಮ್ಮು, ಬಲತ್ಕಾರ, ಸೊಕ್ಕು, ಬಯಕೆ, ಸಿಡುಕುಗಳ ನೆಲೆಯಾದವರು. ತನ್ನ ಮತ್ತು ಪರರ ದೇಹದೊಳಗಿರುವ ನನ್ನನ್ನು ನಂಬದೇ ನಿರಾಕರಿಸುವವರು. ಇನ್ನೊಬ್ಬರ ಏಳಿಗೆಗೆ ಕಿಚ್ಚುಪಡುವವರು.

ಇವರ ಮೂಲ ಆಸ್ತಿ- ಅಹಂಕಾರ, ದರ್ಪ, ಕಾಮ ಮತ್ತು ಕ್ರೋಧ. ನನ್ನನ್ನು ಮೀರಿಸುವವರು ಯಾರಿದ್ದಾರೆ? ನಾನೇ ದೊಡ್ಡ ಮನುಷ್ಯ ಎನ್ನುವ ಅಹಂಕಾರ. ಅದಕ್ಕೆ ಬೆಂಬಲ ಧನ ಮತ್ತು ಅಧಿಕಾರ ಬಲ. ಇದರಿಂದ ಇನ್ನೊಬ್ಬರನ್ನು ತಿರಸ್ಕಾರದಿಂದ ಕಾಣುವ ದರ್ಪ. ತೀರದ ಬಯಕೆಗಳು, ಅವು ಈಡೇರಲಿಲ್ಲ ಎನ್ನುವ ಕೋಪ- ಇದೇ ಅವರ ಅಸ್ತಿತ್ವ. ಕೃಷ್ಣ ಹೇಳುತ್ತಾನೆ: "ಎಲ್ಲರೊಳಗಿರುವ 'ನನ್ನನ್ನು' ನಂಬದೇ ನಿರಾಕರಿಸುತ್ತಾರೆ" ಎಂದು. ಇದು ಯಾವುದೋ ಕಾರಣನಿಮಿತ್ತ ತಾತ್ಕಾಲಿಕವಾಗಿ ಭಗವಂತನನ್ನು ನಿರಾಕರಿಸುವುದಲ್ಲ, ಬದಲಿಗೆ ಸ್ವರೂಪತಃ ಭಗವಂತನನ್ನು ನಿರಾಕರಿಸುವುದು. ಇಂತವರು ಇನ್ನೊಬ್ಬರ ಜ್ಞಾನ ಮತ್ತು ಧನ ಸಂಪತ್ತನ್ನು ನೋಡಿ ಸದಾ ಅಸೂಯೆ ಪಡುತ್ತಿರುತ್ತಾರೆ.
ಹೀಗೆ ಆಸುರೀ ಜನರ ಸ್ವಭಾವ, ಅವರ ಯೋಚನೆಗಳು, ಅವರ ನಡವಳಿಕೆಗಳನ್ನು ಕೂಲಂಕುಶವಾಗಿ ಕೃಷ್ಣ ವರ್ಣಿಸಿದ. ಮುಂದೆ ಕೃಷ್ಣ ಇಂತಹ ಆಸುರೀ ಜನರನ್ನು ಭಗವಂತ ಏನು ಮಾಡುತ್ತಾನೆ? ಅವರ ಗತಿ ಏನಾಗುತ್ತದೆ ಎನ್ನುವುದನ್ನು ವರ್ಣಿಸುತ್ತಾನೆ.

ತಾನಹಂ ದ್ವಿಷತಃ ಕ್ರೂರಾನ್ ಸಂಸಾರೇಷು ನರಾಧಮಾನ್ ।
ಕ್ಷಿಪಾಮ್ಯಜಸ್ರಮಶುಭಾನಾಸುರೀಷ್ವೇವ ಯೋನಿಷು ॥೧೯॥

ತಾನ್ ಅಹಂ ದ್ವಿಷತಃ ಕ್ರೂರಾನ್ ಸಂಸಾರೇಷು ನರ ಅಧಮಾನ್ ।
ಕ್ಷಿಪಾಮಿ ಅಜಸ್ರಮ್ ಅಶುಭಾನ್ ಆಸುರೀಷು ಏವ ಯೋನಿಷು –ಪರತತ್ವವನ್ನು ದ್ವೇಷಿಸುವ, ಕನಿಕರವಿಲ್ಲದ ಕೊಳಕಾದ ಅಂತಹ ನೀಚ ಮನುಜರನ್ನು ನಾನು ನಿರಂತರವಾಗಿ ಬಾಳ ಬವಣೆಗಳಲ್ಲಿ, ಕೆಡುನಡೆಯ ಬಸಿರುಗಳಲ್ಲಿ ಕೆಡುವುತ್ತೇನೆ.

ಭಗವಂತ ಜೀವನನ್ನು ಸೃಷ್ಟಿಸುವುದಿಲ್ಲ; ಮೂಲವಾಗಿ ಜೀವ ಮತ್ತು ಜೀವ ಸ್ವಭಾವ ಅನಾಧಿನಿತ್ಯ ಎನ್ನುವುದನ್ನು ನಾವು ಹಿಂದೆ ತಿಳಿದಿದ್ದೇವೆ. ಆಸುರೀ ಸ್ವಭಾವ ಎನ್ನುವುದು ಮೂಲತಃ ಜೀವ ಸ್ವಭಾವ. ಹೇಗೆ ಹಾಗಲಕಾಯಿ ಕಹಿಯೋ ಹಾಗೇ ಈ ಆಸುರೀ ಜನರ ಜೀವಸ್ವಭಾವ ತಾಮಸ. ಅದನ್ನು ಭಗವಂತ ಬದಲಿಸುವುದಿಲ್ಲ. ಬದಲಿಗೆ ಆ ಜೀವದ ಸ್ವಭಾವಕ್ಕನುಗುಣವಾಗಿ ಜೀವದ ಗತಿ ನಿರ್ಮಾಣವಾಗುತ್ತದೆ. ಭಗವಂತನನ್ನು ದ್ವೇಷಿಸುವ, ಮನುಕುಲವನ್ನು ದ್ವೇಷಿಸುವ, ಪ್ರಪಂಚವನ್ನೇ ದ್ವೇಷಿಸುವ ಈ ಕ್ರೂರಿಗಳನ್ನು ಭಗವಂತ ನಿರಂತರ ಸಂಸಾರ ಸಾಗರದಲ್ಲಿ ಹಾಕುತ್ತಾನೆ. ಇದರಿಂದ ಅವರು ಮರಳಿಮರಳಿ ಹೀನ ಮನೆತನದಲ್ಲಿ ಹುಟ್ಟಿಬರುವಂತಾಗುತ್ತದೆ.

ಆಸುರೀಂ ಯೋನಿಮಾಪನ್ನಾ ಮೂಢಾ ಜನ್ಮನಿಜನ್ಮನಿ ।
ಮಾಮಪ್ರಾಪ್ಯೈವ ಕೌಂತೇಯ ತತೋ ಯಾಂತ್ಯಧಮಾಂ ಗತಿಮ್॥೨೦॥

ಆಸುರೀಂ ಯೋನಿಮ್ ಆಪನ್ನಾಃ ಮೂಢಾಃ ಜನ್ಮನಿಜನ್ಮನಿ ।
ಮಾಮ್ ಅಪ್ರಾಪ್ಯ ಏವ ಕೌಂತೇಯ ತತಃ ಯಾಂತಿ ಅಧಮಾಂ ಗತಿಮ್—ಕೌಂತೇಯಾ, ಕೆಡುನಡೆಯ ಬಸಿರಿನಲ್ಲಿ ಮರಳಿಮರಳಿ ಹುಟ್ಟಿಬಂದ ಆ ತಿಳಿಗೇಡಿಗಳು ಕೊನೆಗೂ ನನ್ನನ್ನು ಸೇರದೆಯೇ, ಅಲ್ಲಿಂದ ಮತ್ತೆ ಅಧೋಗತಿಯನ್ನು ಪಡೆಯುತ್ತಾರೆ.

ಈ ರೀತಿ ಹೀನ ಮನೆತನದಲ್ಲಿ ಮರಳಿಮರಳಿ ಹುಟ್ಟಿ ಬರುವ ಈ ದುಷ್ಟರು ಪ್ರತೀ ಜನ್ಮದಲ್ಲೂ ಮೂಢರಾಗುತ್ತಾ ಹೋಗುತ್ತಾರೆ. ಪ್ರತೀ ಜನ್ಮದಲ್ಲೂ ಇವರ ಭಗವಂತನ ಮೇಲಿನ ದ್ವೇಷ ಪರಾಕಾಷ್ಠೆಗೆ ಹೋಗುತ್ತದೆ. ಅಹಂಕಾರ, ಮದ, ದರ್ಪ, ಕಾಮ ಕ್ರೋಧ ಮಿತಿಮೀರಿ ಇವರು ತಾವಾಗಿಯೇ ಅಧಃಪಾತವನ್ನು ಹೊಂದುತ್ತಾರೆ. ಇವರೆಂದೂ ಭಗವಂತನನ್ನು ಸೇರುವುದಿಲ್ಲ. ಇವರು ತಮ್ಮ ಜೀವಸ್ವಭಾವದ ಗತಿಗನುಗುಣವಾಗಿ ತಾಮಸಲೋಕವನ್ನು ಸೇರುತ್ತಾರೆ.

ಆಸುರೀ ಜನರ ಜೀವ ಸ್ವಭಾವ, ಅವರ ನಡೆ-ನುಡಿ-ಯೋಚನೆ-ಕೃತಿಯ ಬಗ್ಗೆ ಸುಂದರವಾಗಿ ಕೃಷ್ಣ ವಿವರಿಸಿದ. ಇದರಿಂದ ನಮಗೆ ಲೋಕದಲ್ಲಿ ಲೋಕಕಂಟಕರು ಏಕಿದ್ದಾರೆ? ಅವರು ಮುಂದೆ ಯಾವ ಗತಿಯನ್ನು ಪಡೆಯುತ್ತಾರೆ ಎನ್ನುವ ವಿಚಾರ ತಿಳಿಯುತ್ತದೆ. ನಮಗರಿವಿಲ್ಲದೆ ನಮ್ಮನ್ನು ಆಸುರೀ ಗುಣ ಕಾಡಿದಾಗ ನಾವು ಜ್ಞಾನದ ಅರಿವಿನಿಂದ ಭಗವಂತನಲ್ಲಿ ಮೊರೆ ಹೊಕ್ಕು, ಅದರಿಂದ ಬಿಡುಗಡೆಗೆ ಇಚ್ಛಿಸಲು ಈ ಅಧ್ಯಾಯ ಸಹಕರಿಸುತ್ತದೆ. ಜೀವದ ಸ್ವಭಾವ ಎಂದೂ ಬದಲಾಗುವುದಿಲ್ಲ. ಜೀವಕ್ಕೆ ಸ್ವತಂತ್ರ ಕರ್ತೃತ್ವ ಇಲ್ಲ. ಆದರೆ ಜೀವಕ್ಕೆ ಇಚ್ಛಾಪೂರ್ವಕ ಕೃತಿ ಇದೆ. ಇದಕ್ಕನುಗುಣವಾಗಿ ನಿರಂತರ ದೈವೀ ಸ್ವಭಾವವನ್ನು ಬೆಳಸಿಕೊಂಡು-ಭಗವಂತನನ್ನು ಸೇರುವ ಪ್ರಯತ್ನವನ್ನು ನಾವು ಮಾಡಬೇಕು. ಅದಕ್ಕೆ ಫಲ ಸಿಗುವುದು ಬಿಡುವುದು ಭಗವಂತನ ಇಚ್ಛೆ-ಅದಕ್ಕಾಗಿ ನಾವು ತಲೆಕೆಡಿಸಿಕೊಳ್ಳಬಾರದು. ಒಳ್ಳೆಯದನ್ನು ಇಚ್ಛಿಸು, ಒಳ್ಳೆಯವನಾಗಿ ಇದ್ದದ್ದರಲ್ಲಿ ತೃಪ್ತಿಪಟ್ಟು ಬದುಕು. ನಿನ್ನ ರಕ್ಷಣೆಯ ಭಾರ ಭಗವಂತನದು, ಆತ ನಿನ್ನನ್ನು ರಕ್ಷಿಸಿಯೇ ರಕ್ಷಿಸುತ್ತಾನೆ.

ತ್ರಿವಿಧಂ ನರಕಸ್ಯೇದಂ ದ್ವಾರಂ ನಾಶನಮಾತ್ಮನಃ ।
ಕಾಮಃ ಕ್ರೋಧಸ್ತಥಾ ಲೋಭಸ್ತಸ್ಮಾದೇತತ್ ತ್ರಯಂ ತ್ಯಜೇತ್ ॥೨೧॥

ತ್ರಿವಿಧಂ ನರಕಸ್ಯ ಇದಂ ದ್ವಾರಂ ನಾಶನಮ್ ಆತ್ಮನಃ ।
ಕಾಮಃ ಕ್ರೋಧಃ ತಥಾ ಲೋಭಃ ತಸ್ಮಾತ್ ಏತತ್ ತ್ರಯಮ್ ತ್ಯಜೇತ್ -- ಇವು ಮೂರು ಆತ್ಮ ನಾಶದ ದಾರಿ, ನರಕದ ಬಾಗಿಲು: ಕಾಮ, ಕ್ರೋಧ, ಮತ್ತು ಲೋಭ. ಆದ್ದರಿಂದ ಈ ಮೂರನ್ನು ದೂರವಿಡಬೇಕು.

ಈ ಶ್ಲೋಕ ಬಹಳ ಮುಖ್ಯವಾದ ಸಂದೇಶವನ್ನು ಕೊಡುವ ಶ್ಲೋಕ. ವಿದುರನೀತಿಯಲ್ಲಿ ಕೂಡಾ ಈ ಶ್ಲೋಕ ಬಂದಿದೆ. ಸಾಮಾಜಿಕ ಮತ್ತು ಆಧ್ಯಾತ್ಮಿಕ ನಿಟ್ಟಿನಲ್ಲಿ ಮಹಾಭಾರತ ಇದನ್ನು ಉಲ್ಲೇಖಮಾಡುತ್ತದೆ. ಇಲ್ಲಿ ಕೃಷ್ಣ ಆತ್ಮನಾಶಕ್ಕೆ ಕಾರಣವಾಗುವ ಮೂರು ಅಂಶಗಳನ್ನು ವಿವರಿಸಿದ್ದಾನೆ. ಅವುಗಳೆಂದರೆ ಕಾಮ-ಕ್ರೋಧ-ಲೋಭ. ಇವು "ಮಾನವನ ನರಕದ ಬಾಗಿಲು" ಎನ್ನುತ್ತಾನೆ ಕೃಷ್ಣ. ಕ್ರೋಧ ಎನ್ನುವುದು ಕಾಮದ ಮರಿ. ನಮಗೆ ಕ್ರೋಧ ಬರುತ್ತಿದೆ ಎಂದರೆ ನಮ್ಮ ಒಳಗೆ ಬಹಳ ಆಸೆಗಳು ಹುದುಗಿವೆ ಎಂದರ್ಥ. ಅದು ನೆರವೇರದೇ ಇದ್ದಾಗ ನಮಗೆ ಕೋಪ. ಮಹಾಭಾರತದ ಅನುಶಾಸನ ಪರ್ವದಲ್ಲಿ ಒಂದು ಕಥೆ ಇದೆ. ಓರ್ವ ಬ್ರಾಹ್ಮಣ ಸ್ತ್ರೀ; ಆಕೆಯ ಹೆಸರು ಗೌತಮಿ. ಆಕೆಗೆ ಒಬ್ಬನೇ ಮಗ. ಒಂದು ದಿನ ಹಾವು ಕಚ್ಚಿ ಆತ ಸಾಯುತ್ತಾನೆ. ಇದನ್ನು ಒಬ್ಬ ಹಾವಾಡಿಗ ಕಂಡು, ಕೂಡಾಲೇ ಆ ಹಾವನ್ನು ಹಿಡಿದು ಆಕೆಯ ಎದುರು ತಂದು: “ಹೇಳು, ನಿನ್ನ ಮಗನನ್ನು ಕಚ್ಚಿ ಕೊಂದ ಈ ಹಾವನ್ನು ಯಾವ ರೀತಿ ಕೊಲ್ಲಲು ನೀನು ಇಷ್ಟ ಪಡುತ್ತೀಯ” ಎಂದು ಕೇಳುತ್ತಾನೆ. ಆಗ ಆಕೆ ಹೇಳುತ್ತಾಳೆ: “ನ ಬ್ರಾಹ್ಮಣಾನಂ ಕೋಪೋಽಸತಿ ಕೃತಃ ಕೋಪಾಚ ಚ ಯಾತನಾ....” | ೧೩-೦೧-೨೦| . “ನಾವು ಬ್ರಾಹ್ಮಣರು, ಬ್ರಾಹ್ಮಣನಿಗೆ ಕೋಪ ಬರುವುದಿಲ್ಲ, ಬಂದರೆ ಆತ ಬ್ರಾಹ್ಮಣನೇ ಅಲ್ಲ” ಎಂದು. ಹಾವನ್ನು ಕೊಲ್ಲುವುದರಿಂದ, ಸತ್ತ ಮಗ ಮರಳಿ ಬದುಕಲಾರ. ನನ್ನ ಮಗ ಆತನ ಕರ್ಮಕ್ಕನುಗುಣವಾಗಿ ಸತ್ತ. ಅದಕ್ಕಾಗಿ ಕೋಪ ದುಃಖ ತರವಲ್ಲ, ಬಿಟ್ಟುಬಿಡು ಆ ಹಾವನ್ನು” ಎನ್ನುತ್ತಾಳೆ ಆಕೆ. ಯಾರಿಗೆ ತಿಳುವಳಿಕೆ ಇದೇ, ಬಯಕೆಗಳಿಲ್ಲಾ –ಅಂತವರಿಗೆ ಕೋಪ ಬರುವುದಿಲ್ಲ. ಅವರು ನಿಜವಾದ ಬ್ರಾಹ್ಮಣ ಎನಿಸುತ್ತಾರೆ. “ಕಾಮ-ಕ್ರೋಧ-ಲೋಭ ಎನ್ನುವುದು ನಮ್ಮನ್ನು ಅಧಃಪಾತಕ್ಕೆ ತಳ್ಳುವ ಮೂರು ನರಕದ ಬಾಗಿಲುಗಳು, ಅವುಗಳಿಂದ ದೂರವಿರು” ಎಂದು ಕೃಷ್ಣ ಇಲ್ಲಿ ನಮ್ಮನ್ನು ಎಚ್ಚರಿಸಿದ್ದಾನೆ. ಇವು ನಮ್ಮ ವ್ಯಕ್ತಿತ್ವವನ್ನು ಹಾಳುಮಾಡುವ ಮೂಲ ಶತ್ರುಗಳು. ಇತರ ಎಲ್ಲಾ ದುರ್ಗುಣಗಳೂ ಇವುಗಳ ಮರಿಗಳು. ಮನುಷ್ಯ ಈ ಮೂರು ದುರ್ಗುಣಗಳಿಂದ ತನ್ನ ನರಕವನ್ನು ತಾನೇ ಸೃಷ್ಟಿಸಿಕೊಳ್ಳುತ್ತಾನೆ. ಈ ಮೂರನ್ನು ಬಿಟ್ಟರೆ ಇಹದಲ್ಲೂ ಸುಖ-ಪರದಲ್ಲೂ ಸುಖ.

ಏತೈರ್ವಿಮುಕ್ತಃ ಕೌಂತೇಯ ತಮೋದ್ವಾರೈಸ್ತ್ರಿಭಿರ್ನರಃ ।
ಆಚರತ್ಯಾತ್ಮನಃ ಶ್ರೇಯಸ್ತತೋ ಯಾತಿ ಪರಾಂ ಗತಿಮ್ ॥೨೨॥

ಏತೈಃ ವಿಮುಕ್ತಃ ಕೌಂತೇಯ ತಮಃ ದ್ವಾರೈಃ ತ್ರಿಭಿಃ ನರಃ ।
ಆಚರತಿ ಆತ್ಮನಃ ಶ್ರೇಯಃ ತತಃ ಯಾತಿ ಪರಾಂ ಗತಿಮ್ -- ಕೌಂತೇಯಾ, ನರಕದ ಈ ಮೂರು ಬಾಗಿಲುಗಳಿಂದ ಪಾರಾದ ನರನು ತನಗೆ ಒಳಿತಾದ್ದನ್ನು ಮಾಡಬಲ್ಲವನಾಗುತ್ತಾನೆ. ಅದರಿಂದ ಉತ್ತಮಗತಿಯನ್ನೂ ಪಡೆಯುತ್ತಾನೆ.

ನರಕದ ಈ ಮೂರು ಬಾಗಿಲುಗಳಿಂದ ಪಾರಾದ ಮಾನವ ಪುಣ್ಯಾತ್ಮ. ಆತನಿಗೆ ಮೋಕ್ಷದ ದಾರಿ ಸುಗಮವಾಗುತ್ತದೆ. ಆತ ಉತ್ತಮ ಗತಿಯನ್ನು ಪಡೆಯುತ್ತಾನೆ. ಇಲ್ಲಿ ಕೃಷ್ಣ 'ವಿಮುಕ್ತ' ಎನ್ನುವ ಪದವನ್ನು ಬಳಸಿದ್ದಾನೆ. ಇದರ ಅರ್ಥ ಎಲ್ಲಾ ಕಾಮನೆಗಳನ್ನೂ ಬಿಡುವುದಲ್ಲ, ನಮ್ಮ ಬದುಕಿಗೆ ಭಾದಕವಾಗಿರುವ ರಾಜಸ ಮತ್ತು ತಾಮಸ ಕಾಮನೆಗಳನ್ನು ಬಿಡುವುದು ಎಂದರ್ಥ. ಉದಾಹರಣೆಗೆ ಭಗವಂತನನ್ನು ಸೇರಬೇಕು ಎನ್ನುವುದೂ ಒಂದು ಕಾಮನೆ. ಇದು ನರಕದ ಬಾಗಿಲಲ್ಲ. ಇದನ್ನು ಬಿಡಬೇಕಾಗಿಲ್ಲ. ಕಾಮ ಇಲ್ಲದೇ ಜೀವನವಿಲ್ಲ. ಆದ್ದರಿಂದ ಇಲ್ಲಿ ನಾವು ಬಿಡಬೇಕಾಗಿರುವುದು ಕೇವಲ ರಾಜಸ ಮತ್ತು ತಾಮಸ ಅಂಶವನ್ನು. ಇದನ್ನು ಸೂಚಿಸುವುದಕ್ಕಾಗಿ ಇಲ್ಲಿ 'ಮುಕ್ತ' ಎಂದು ಹೇಳದೇ 'ವಿ-ಮುಕ್ತ' ಎಂದು ಹೇಳಲಾಗಿದೆ.
ಇಲ್ಲಿ 'ಕೌಂತೇಯ' ಎನ್ನುವ ವಿಶೇಷಣ ಬಳಕೆಯಾಗಿದೆ. 'ನಾವು ಜ್ಞಾನ ಮಾರ್ಗದಲ್ಲಿ ಸಾಗಬೇಕಾದರೆ ಕುತ್ಸಿತವಾದ ಈ ಕಾಮ-ಕ್ರೋಧ-ಲೋಭವನ್ನು ತಿರಸ್ಕಾರ ಮಾಡುವ ಕೌಂತೇಯರಾಗಬೇಕು' ಎನ್ನುವ ಸಂದೇಶ ಈ ವಿಶೇಷಣದ ಹಿಂದಿರುವ ಧ್ವನಿ.

ನಮ್ಮಲ್ಲಿ ಕೆಲವರಿಗೆ ಶಾಸ್ತ್ರದ ವಿಧಿ ವಿಧಾನ ಏಕೆ ಬೇಕು, ಆತ್ಮ ಸಾಕ್ಷಿಯಿಂದ ಬದುಕಿದರೆ ಸಾಲದೇ? ಎನ್ನುವ ಪ್ರಶ್ನೆ ಇದೆ. ಕೃಷ್ಣ ಮುಂದಿನ ಶ್ಲೋಕದಲ್ಲಿ ಶಾಸ್ತ್ರದ ವಿಧಿ-ವಿಧಾನ ಪಾಲನೆಯ ಮಹತ್ವವನ್ನು ವಿವರಿಸುತ್ತಾನೆ.

ಯಃ ಶಾಸ್ತ್ರವಿಧಿಮುತ್ಸೃಜ್ಯ ವರ್ತತೇ ಕಾಮಕಾರತಃ ।
ನ ಸ ಸಿದ್ಧಿಮವಾಪ್ನೋತಿ ನ ಸುಖಂ ನ ಪರಾಂ ಗತಿಮ್ ॥೨೩॥

ಯಃ ಶಾಸ್ತ್ರವಿಧಿಮ್ ಉತ್ಸೃಜ್ಯ ವರ್ತತೇ ಕಾಮಕಾರತಃ ।
ನ ಸಃ ಸಿದ್ಧಿಮ್ ಅವಾಪ್ನೋತಿ ನ ಸುಖಂ ನ ಪರಾಂ ಗತಿಮ್ –ಶಾಸ್ತ್ರದ ಕಟ್ಟಳೆಯನ್ನು ಮೀರಿ ಇಷ್ಟಬಂದಂತೆ ನಡೆವವನು ಸಿದ್ಧಿಯನ್ನು ಪಡೆಯಲಾರ. ಅವನಿಗೆ ಸುಖವಿಲ್ಲ; ಪರಮಗತಿಯೂ ಇಲ್ಲ.

ನಾವು ಶಾಸ್ತ್ರದ ಕಟ್ಟಳೆಯನ್ನು ಬಿಟ್ಟು ನಮ್ಮಿಷ್ಟಕ್ಕೆ ನಾವು ಪ್ರಾಮಾಣಿಕವಾಗಿ ಬದುಕಲು ಸಾಧ್ಯವಿಲ್ಲ. ಏಕೆಂದರೆ ನಮಗೆ ಯಾವುದು ಸರಿ, ಯಾವುದು ತಪ್ಪು ಎನ್ನುವ ಪರಿಜ್ಞಾನವಿರುವುದಿಲ್ಲ. ನಮಗೆ ಇಷ್ಟವಾದುದು ಸರಿ ಎಂದು ನಾವು ತಿಳಿದುಕೊಳ್ಳುತ್ತೇವೆ. ನಮಗೆ ಯಾವುದು ತಿಳುವಳಿಕೆ ಕೊಡುತ್ತವೋ ಅವು ಶಾಸ್ತ್ರಗಳು. ಜಗತ್ತಿನ ಅನೇಕ ಸಂಗತಿಗಳನ್ನು ನಮ್ಮ ಅನುಷ್ಠಾನದಲ್ಲಿ ಅಳವಡಿಸಿಕೊಳ್ಳಲು ಕೇವಲ ಆತ್ಮಶಕ್ತಿ ಮತ್ತು ಪ್ರಾಮಾಣಿಕತೆ ಸಾಲದು. ಇದು ಸರಿ ಇದು ತಪ್ಪು ಎಂದು ತೀರ್ಮಾನ ಮಾಡಲು ಶಾಸ್ತ್ರಗಳು ಬೇಕೇ ಬೇಕು. ನಾವು ನಮ್ಮ ಅನುಭವದಿಂದ

ಇಡೀ ಪ್ರಪಂಚವನ್ನು ಗ್ರಹಿಸಲು ಸಾಧ್ಯವಿಲ್ಲ. ನಮ್ಮ ಬುದ್ಧಿ ಸೀಮಿತ, ನಮ್ಮ ತರ್ಕ ಸೀಮಿತ, ನಮ್ಮ ಆತ್ಮಸಾಕ್ಷಿ ಸೀಮಿತ, ನಮ್ಮ ಪ್ರಾಮಾಣಿಕತೆ ಸೀಮಿತ. ಹಾಗಾಗಿ ನಾವು ಸೀಮಿತವಾದ ಅನುಭವದಿಂದ ಇಡೀ ವಿಶ್ವದ ಸತ್ಯವನ್ನು ತಿಳಿಯಲು ಸಾಧ್ಯವಿಲ್ಲ. ಈ ಕಾರಣದಿಂದ ಭಗವಂತ; ಆತ ಜಗತ್ತಿಗೆ ಕೊಟ್ಟ ವೇದಾದಿ ಶಾಸ್ತ್ರಗಳು; ಆ ಶಾಸ್ತ್ರವನ್ನು ಅರ್ಥಮಾಡಿಕೊಂಡು ನಮಗೆ ತಿಳಿ ಹೇಳಿದ ದೇವರನ್ನು ಬಲ್ಲ ಜ್ಞಾನಿಗಳು-ಇವರಿಂದ ನಾವು ನಿಜವನ್ನು ಅರಿಯಬೇಕು. ಇಲ್ಲದಿದ್ದರೆ ಸಿದ್ಧಿ ಸಾಧ್ಯವಿಲ್ಲ.

ತಸ್ಮಾಚ್ಛಾಸ್ತ್ರಂ ಪ್ರಮಾಣಂ ತೇ ಕಾರ್ಯಾಕಾರ್ಯವ್ಯವಸ್ಥಿತೌ ।
ಜ್ಞಾತ್ವಾ ಶಾಸ್ತ್ರವಿಧಾನೋಕ್ತಂ ಕರ್ಮ ಕರ್ತುಮಿಹಾರ್ಹಸಿ ॥೨೪॥

ತಸ್ಮಾತ್ ಶಾಸ್ತ್ರಮ್ ಪ್ರಮಾಣಂ ತೇ ಕಾರ್ಯ ಅಕಾರ್ಯ ವ್ಯವಸ್ಥಿತೌ ।
ಜ್ಞಾತ್ವಾ ಶಾಸ್ತ್ರ ವಿಧಾನ ಉಕ್ತಮ್ ಕರ್ಮ ಕರ್ತುಮ್ ಇಹ ಅರ್ಹಸಿ –ಅದರಿಂದ ಬೇಕು-ಬೇಡಗಳ ತೀರ್ಮಾನಕ್ಕೆ ನಿನಗೆ ಶಾಸ್ತ್ರವೇ ಪ್ರಮಾಣ. ಶಾಸ್ತ್ರದ ಕಟ್ಟಳೆಯನ್ನರಿತು ಇಲ್ಲಿ ಕರ್ಮ ಮಾಡಲೆಳಸು.

ಎಲ್ಲಾ ಬೇಕು ಬೇಡಗಳಿಗೆ ಶಾಸ್ತ್ರವೇ ಪ್ರಮಾಣ. ಆದ್ದರಿಂದ ನಾವು ಶಾಸ್ತ್ರದಲ್ಲಿ ಹೇಳುವುದನ್ನು ಮೊದಲು ನಂಬಬೇಕು. ಆಗ ಅದನ್ನು ತಿಳಿಯಲು ಸಾಧ್ಯವಾಗುತ್ತದೆ. ಶಾಸ್ತ್ರದಲ್ಲಿ ಹೀಗೆ ಮಾಡು, ಹೀಗೆ ಮಾಡಬೇಡ ಎಂದು ಹೇಳಿರುವವರು- ಅದರಿಂದಾಗುವ ಪರಿಣಾಮವನ್ನು ಸಾಕ್ಷಾತ್ಕರಿಸಿಕೊಂಡ ಜ್ಞಾನಿಗಳು. ಆದ್ದರಿಂದ ಕರ್ಮದ ಕಟ್ಟಳೆಯನ್ನರಿತು ಕರ್ಮ ಮಾಡು ಎನ್ನುತ್ತಾನೆ ಕೃಷ್ಣ.

ಇಲ್ಲಿ ಶಾಸ್ತ್ರ ಎಂದರೆ ನಾಲ್ಕು ವೇದಗಳು ಮತ್ತು ಅದಕ್ಕೆ ಪೂರಕವಾದ ಪಂಚರಾತ್ರ, ಮಹಾಭಾರತ, ಮೂಲರಾಮಾಯಣ, ಮತ್ತು ಹದಿನೆಂಟು ಪುರಾಣಗಳು. ಇದನ್ನು ಬಿಟ್ಟು ಇತರ ಯಾವುದನ್ನೂ ಪೂರ್ಣವಾಗಿ ಪ್ರಮಾಣವಾಗಿರಿಸಲು ಸಾಧ್ಯವಿಲ್ಲ.

ಇತಿ ಷೋಡಶೋಽಧ್ಯಾಯಃ
ಹದಿನಾರನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಹದಿನೇಳು

ಕೃಷ್ಣ ಗೀತೆಯ ಆರಂಭದಲ್ಲಿ ಕರ್ಮದ ಬಗ್ಗೆ ವಿವರಿಸುತ್ತಾ: "ಫಲದ ನಂಟು ತೊರೆದು, ಭಗವಂತನ ಪೂಜೆಯೆಂದು ಕರ್ಮ ಮಾಡು" ಎನ್ನುವ ಸಂದೇಶವನ್ನು ಕೊಟ್ಟ. ಕರ್ಮ ಮಾಡುವಾಗ ನಾವು ತಿಳಿದುಕೊಳ್ಳಬೇಕಾದ ಒಂದು ಬಹಳ ಮುಖ್ಯವಾದ ವಿಚಾರವೆಂದರೆ: ಯಾವುದು ಸತ್ಕರ್ಮ ಮತ್ತು ಯಾವುದು ಅಸತ್ಕರ್ಮ ಎನ್ನುವದು. ಕೆಟ್ಟ ಕೆಲಸ ಮತ್ತು ಒಳ್ಳೆಯ ಕೆಲಸ ಎನ್ನುವುದು ನಾವು ತಿಳಿದಷ್ಟು ಸರಳವಾಗಿ ತಿಳಿಯುವ ವಿಚಾರವಲ್ಲ. ನಮಗೆ ಮೇಲ್ನೋಟಕ್ಕೆ ಒಳ್ಳೆಯ ಕೆಲಸ ಎಂದು ಕಂಡು ಬಂದದ್ದು ಕೆಟ್ಟ ಕೆಲಸವಾಗಿರಬಹುದು ಅಥವಾ ಕೆಟ್ಟ ಕೆಲಸವೆಂದು ಕಾಣಿಸಿದ್ದು ಒಳ್ಳೆಯ ಕೆಲಸವಾಗಿರಬಹುದು. ಇಲ್ಲಿ ಕೆಲಸದ ಹಿಂದಿರುವ ಭಾವ ಮುಖ್ಯವಾಗುತ್ತದೆ. ಒಂದೇ ಕ್ರಿಯೆ ಅದರ ಹಿಂದಿನ ಭಾವಕ್ಕನುಗುಣವಾಗಿ ಸತ್ಕರ್ಮವಾಗಬಹುದು ಅಥವಾ ದುಷ್ಕರ್ಮವಾಗಬಹುದು. ಉದಾಹರಣೆಗೆ: ಮಹಾಭಾರತ ಯುದ್ಧ. ಈ ಯುದ್ಧದಲ್ಲಿ ಪಾಂಡವರೂ ಪಾಲ್ಗೊಂಡಿದ್ದರು ಮತ್ತು ಕೌರವರೂ ಪಾಲ್ಗೊಂಡಿದ್ದರು. ಪಾಂಡವರಲ್ಲಿ ಸಾತ್ವಿಕವಾದ ಮನೋವೃತ್ತಿ ಇತ್ತು. ಅವರು ಎಂದೂ ಸಾಮಾಜಿಕವಾಗಿ ತಾವು ದೊಡ್ಡ ಸ್ಥಾನವನ್ನು ಗಳಿಸಬೇಕು(ರಾಜಸ ಭಾವನೆ), ಕೌರವರನ್ನು ಮಣ್ಣು ಮುಕ್ಕಿಸಬೇಕು(ತಾಮಸ ಭಾವನೆ) ಎನ್ನುವ ಭಾವನೆಯಿಂದ ಯುದ್ಧ ಮಾಡಿಲ್ಲ. ಆದರೆ ದುರ್ಯೋಧನನಲ್ಲಿ ಇದ್ದದ್ದು ಕೇವಲ ರಾಜಸ ಮತ್ತು ತಾಮಸ ಭಾವನೆ. ಈ ಕಾರಣದಿಂದ ಪಾಂಡವರು ಮಾಡಿದ ಯುದ್ಧ ಸಾತ್ವಿಕ ಯುದ್ಧವಾದರೆ, ಕೌರವರು ಮಾಡಿದ ಯುದ್ಧ ತಾಮಸ ಯುದ್ಧವಾಯಿತು. ಆದ್ದರಿಂದ ನಾವು ಸತ್ಕರ್ಮ ಯಾವುದು ಅಸತ್ಕರ್ಮ ಯಾವುದು ಎನ್ನುವ ಜ್ಞಾನವನ್ನು ಪಡೆದು ಕರ್ಮ ಮಾಡುವುದು ಬಹಳ ಮುಖ್ಯವಾಗುತ್ತದೆ. ಕರ್ಮ ಎನ್ನುವುದು ಸತ್ವ, ರಜಸ್ಸು, ತಮಸ್ಸುಗಳೆಂಬ ಮೂರು ವಿಧವಾದ ತ್ರಿಗುಣಗಳ ಪರಿಧಿಯಲ್ಲೇ ನಡೆಯುತ್ತದೆ. ನಾವು ಮಾಡುವ ಯಜ್ಞ, ದಾನ, ತಪಸ್ಸು; ನಾವು ಸೇವಿಸುವ ಆಹಾರ, ಎಲ್ಲದರಲ್ಲೂ ಈ ಗುಣತ್ರಯಗಳ ಪ್ರಭಾವ ಸೇರಿಕೊಂಡಿರುತ್ತದೆ. ಈ ಗುಣತ್ರಯಗಳ ಪ್ರಭಾವ ನಮ್ಮ ಕರ್ಮದ ಮೇಲೆ ಹೇಗಾಗುತ್ತದೆ ಎನ್ನುವುದನ್ನು ನಾವು ಸಾಧ್ಯವಾದಷ್ಟು ಅರಿತು, ಸತ್ವದ ಪರಿಧಿಯೊಳಗೆ ಕರ್ಮಾಚರಣೆ ಮಾಡಬೇಕು. ಈ ಅಧ್ಯಾಯ ಮುಖ್ಯವಾಗಿ ಯಾವ ಅನುಸಂಧಾನದಿಂದ ಕರ್ಮ ಮಾಡಿದಾಗ ಆ ಕ್ರಿಯೆ ಸಾತ್ವಿಕ, ರಾಜಸ ಅಥವಾ ತಾಮಸ ಕ್ರಿಯೆಯಾಗುತ್ತದೆ ಎನ್ನುವುದನ್ನು ವಿವರಿಸುತ್ತದೆ.

ಹಿಂದಿನ ಅಧ್ಯಾಯದ ಕೊನೆಯಲ್ಲಿ ಕೃಷ್ಣ "ಶಾಸ್ತ್ರದ ಕಟ್ಟಳೆಯನ್ನು ಮೀರಿ ಇಷ್ಟಬಂದಂತೆ ನಡೆವವನು ಸಿದ್ಧಿಯನ್ನು ಪಡೆಯಲಾರ, ಅವನಿಗೆ ಸುಖವಿಲ್ಲ, ಪರಮಗತಿಯೂ ಇಲ್ಲ" ಎಂದು ಹೇಳಿದ್ದ. ಇಲ್ಲಿ ನಮಗೆ ಒಂದು ಪ್ರಶ್ನೆ ಬರುತ್ತದೆ. ಶಾಸ್ತ್ರದ ಕಟ್ಟಳೆ ತಿಳಿಯದವರು-ನಂಬಿಕೆಯಿಂದ ಕರ್ಮ ಮಾಡುತ್ತಾರೆ-ಅಂತವರ ಗತಿ ಏನು? ಎಂದು. ನಮ್ಮ ಪರವಾಗಿ ಅರ್ಜುನ ಕೃಷ್ಣನಲ್ಲಿ ಈ ಪ್ರಶ್ನೆಯನ್ನು ಕೇಳುವುದರೊಂದಿಗೆ ಈ ಅಧ್ಯಾಯ ಪ್ರಾರಂಭವಾಗುತ್ತದೆ. ಬನ್ನಿ ಅರ್ಜುನನೊಂದಿಗೆ ನಾವೂ ಸೇರಿಕೊಂಡು ಭಗವಂತನ ಉಪದೇಶವನ್ನು ಆಲಿಸೋಣ.

ಅರ್ಜುನ ಉವಾಚ ।

ಯೇ ಶಾಸ್ತ್ರವಿಧಿಮುತ್ಸೃಜ್ಯ ಯಜಂತೇ ಶ್ರದ್ಧಯಾಽನ್ವಿತಾಃ ।
ತೇಷಾಂ ನಿಷ್ಠಾ ತು ಕಾ ಕೃಷ್ಣ ಸತ್ತ್ವಮಾಹೋ ರಜಸ್ತಮಃ ॥೧॥

ಅರ್ಜುನಃ ಉವಾಚ- ಅರ್ಜುನ ಕೇಳಿದನು:

ಯೇ ಶಾಸ್ತ್ರವಿಧಿಮ್ ಉತ್ಸೃಜ್ಯ ಯಜಂತೇ ಶ್ರದ್ಧಯಾ ಅನ್ವಿತಾಃ ।

ತೇಷಾಂ ನಿಷ್ಠಾ ತು ಕಾ ಕೃಷ್ಣ ಸತ್ತ್ವಮ್ ಆಹೋ ರಜಃ ತಮಃ -- ಕೆಲವರು ಶಾಸ್ತ್ರದ ಕಟ್ಟಳೆ ಅರಿಯದೇ ಬಿಟ್ಟರೂ ನಂಬಿಕೆಯಿಂದ ನಡೆದುಕೊಳ್ಳುತ್ತಾರೆ. ಅಂತವರ ನೆಲೆ ಎಂತಹದು ಕೃಷ್ಣಾ? ಸತ್ವವೇ, ರಜಸ್ಸೇ ಅಥವಾ ತಮಸ್ಸೇ?

ನಾವು ವೇದಾಧ್ಯಯನ ಮಾಡಿಲ್ಲ , ನಮಗೆ ಶಾಸ್ತ್ರದ ವಿಧಿ ಗೊತ್ತಿಲ್ಲ, ಆದರೆ ಶಾಸ್ತ್ರ ತಿಳಿಯದೇ ಇದ್ದುದಕ್ಕಾಗಿ ಪಶ್ಚಾತ್ತಾಪವಿದೆ; ಶಾಸ್ತ್ರದ ಬಗ್ಗೆ ಶ್ರದ್ಧೆ ಇದೆ, ಅದರ ಪ್ರಕಾರ ಬದುಕಬೇಕು ಎನ್ನುವ ಬಯಕೆ ಇದೆ. ತಿಳಿದವರು ಹೇಳುತ್ತಾರೆ: "ಯದೇವ ವಿದ್ಯಯಾ ಕರೋತಿ ಶ್ರದ್ಧೆಯ.. ಅಂದರೆ "ನೀನು ಏನನ್ನು ಮಾಡಿದರೂ ತಿಳಿದು ಮಾಡು. ಜ್ಞಾನ ಪೂರ್ವಕವಾಗಿ ಮಾಡಿದ ಕರ್ಮ ಸಫಲ. ಇಲ್ಲದಿದ್ದರೆ ಅದು ವ್ಯರ್ಥ" ಎಂದು. ಹೀಗಿರುವಾಗ ಒಬ್ಬ ಶ್ರದ್ಧೆಯಿಂದ ಮಾಡುವ ಕರ್ಮ ವ್ಯರ್ಥವೋ? ಇದು ಅರ್ಜುನನ ಪ್ರಶ್ನೆ.

ಇಲ್ಲಿ 'ಶ್ರದ್ಧಾ' ಅಂದರೆ-ಅತೀಂದ್ರಿಯವಾಗಿರತಕ್ಕ, ನಮ್ಮನ್ನು ನಿಯಂತ್ರಿಸುವ ಅಗೋಚರ ಶಕ್ತಿಯ ಬಗ್ಗೆ ನಮಗಿರುವ ನಂಬಿಕೆ. ಅರ್ಥಾತ್: ಭಗವಂತನ ಮೇಲೆ ನಂಬಿಕೆ, ಶಾಸ್ತ್ರದ ಮೇಲೆ ನಂಬಿಕೆ, ಪಾಪ-ಪುಣ್ಯದ ನಂಬಿಕೆ, ಎಲ್ಲವನ್ನೂ ನಿಯಂತ್ರಿಸುವ ಪರಶಕ್ತಿ ಒಂದಿದೆ ಎನ್ನುವ ನಂಬಿಕೆ. ಮಹಾಭಾರತದಲ್ಲಿ ಹೇಳುವಂತೆ: 'ಕರ್ಮಕ್ಕೆ ಫಲವಿದೆ ಎನ್ನುವ ನಂಬಿಕೆಯೇ ಮನುಷ್ಯನ ಬದುಕಿನ ಆಧಾರ ಸ್ಥಂಭ'. ಹೀಗಿರುವಾಗ ನಂಬಿಕೆಯೊಂದಿಗೆ ಶ್ರದ್ಧೆ ಇದ್ದು, ಶಾಸ್ತ್ರದ ತಿಳುವಳಿಕೆ ಇಲ್ಲದೇ ಇದ್ದರೆ ಅಂತವರ ನೆಲೆ ಏನು? "ಎಲ್ಲರನ್ನು ಕರ್ಷಣೆ ಮಾಡುವ(ಕೃಷ್ಣ) ನೀನು ಇಂತವರನ್ನು ಎಲ್ಲಿಗೆ ಕರ್ಷಣೆ ಮಾಡುತ್ತೀಯ? ಅಂಥವರ ನಿಷ್ಠೆ ಸಾತ್ವಿಕವೋ, ರಾಜಸವೋ ಅಥವಾ ತಾಮಸವೋ?" ಎಂದು ನಮ್ಮ ನಿಮ್ಮೆಲ್ಲರಿಗಿರುವ ಈ ಗೊಂದಲದ ಪ್ರಶ್ನೆಯನ್ನು ಅರ್ಜುನ ಕೃಷ್ಣನಲ್ಲಿ ಕೇಳುತ್ತಾನೆ.

ಭಗವಾನುವಾಚ ।

ತ್ರಿವಿಧಾ ಭವತಿ ಶ್ರದ್ಧಾ ದೇಹಿನಾಂ ಸಾ ಸ್ವಭಾವಜಾ ।
ಸಾತ್ವಿಕೀ ರಾಜಸೀ ಚೈವ ತಾಮಸೀ ಚೇತಿ ತಾಂ ಶೃಣು ॥೨॥

ಭಗವಾನ್ ಉವಾಚ –ಭಗವಂತ ಹೇಳಿದನು:

ತ್ರಿವಿಧಾ ಭವತಿ ಶ್ರದ್ಧಾ ದೇಹಿನಾಂ ಸಾ ಸ್ವಭಾವಜಾ ।

ಸಾತ್ವಿಕೀ ರಾಜಸೀ ಚ ಏವ ತಾಮಸೀ ಚ ಇತಿ ತಾಂ ಶೃಣು –ಜೀವಿಗಳ ಹುಟ್ಟುಗುಣದಿಂದಲೇ ಹುಟ್ಟಿಬರುವ ಈ

ನಂಬಿಕೆ ಮೂರು ತೆರನಾಗಿದೆ: ಸಾತ್ವಿಕ, ರಾಜಸ, ಮತ್ತು ತಾಮಸ. ಅದರ ಬಗೆಯನ್ನಾಲಿಸು.

ಸಾಧನಾ ಶರೀರದಲ್ಲಿರುವ ಜೀವಗಳು ಮೂಲಭೂತವಾಗಿ ಮೂರು ತೆರನಾಗಿರುತ್ತವೆ. ಅದು ಸಾತ್ವಿಕ, ರಾಜಸ ಮತ್ತು ತಾಮಸ. ಇದರ ಮೇಲೆ ಪರಿಸರದ ಮತ್ತು ಮನೆತನದ ಪ್ರಭಾವದಿಂದ ಮಾನಸಿಕವಾಗಿ ನಾವು ಮತ್ತೆ ಮೂರು ತೆರನಾದ ಶ್ರದ್ಧೆಯನ್ನು ಬೆಳಸಿಕೊಳ್ಳುತ್ತೇವೆ. ಆದ್ದರಿಂದ ಸ್ವರೂಪತಃ ಸಾತ್ವಿಕನಾಗಿದ್ದರೂ ಕೂಡಾ ಆತ ಮಾನಸಿಕವಾಗಿ ರಾಜಸನಾಗಿರಬಹುದು ಅಥವಾ ತಾಮಸನಾಗಿರಬಹುದು. ಉದಾಹರಣೆಗೆ ಸ್ವರೂಪತಃ ಸಾತ್ವಿಕರಾಗಿದ್ದ ಗರ್ಗಾಚಾರ್ಯರು ತಾಮಸ ಪ್ರಭಾವಕ್ಕೊಳಗಾಗಿ ಕೃಷ್ಣನನ್ನು ಸೋಲಿಸುವ ಮಗ ಹುಟ್ಟಬೇಕು ಎಂದು ತಪಸ್ಸನ್ನಾಚರಿಸಿರುವ ಕಥೆಯನ್ನು ಹಿಂದೆ ನೋಡಿದ್ದೇವೆ. ಮಾನಸಿಕವಾಗಿ ಬರುವ ಈ ಬಾಹ್ಯ ಶ್ರದ್ಧೆ ಜನ್ಮ ಜನ್ಮಾಂತರದ್ದಲ್ಲ. ಆದರೆ ಸ್ವರೂಪ ಶ್ರದ್ಧೆ ಪ್ರತೀ ಜನ್ಮದಲ್ಲೂ ಸದಾ ಜೀವನೊಂದಿಗಿರುತ್ತದೆ. ಇದನ್ನು ಸ್ಪಷ್ಟಪಡಿಸುವುದಕ್ಕೋಸ್ಕರ ಈ ಶ್ಲೋಕದಲ್ಲಿ 'ಏವ' ಮತ್ತು 'ಚ' ಕಾರವನ್ನು ಒಟ್ಟಿಗೆ ಬಳಸಿದ್ದಾರೆ. ಜೀವಸ್ವರೂಪ-ಸಾತ್ವಿಕೇವ, ರಾಜಸ್ಯೇವ ಅಥವಾ ತಾಮಸ್ಯೇವ-ಅದು ಬದಲಾಗುವುದಿಲ್ಲ. ಈ ಸ್ವರೂಪದ ಮೇಲಿರುವ ಬಾಹ್ಯ ಶ್ರದ್ಧೆ- ಸಾತ್ವಿಕೇಚ, ರಾಜಸೇಚ, ತಾಮಸೇಚ-ಪ್ರಭಾವದಿಂದ ಬರುವಂತದ್ದು, ಗರಿಷ್ಠ ಒಂದು ಜನ್ಮಕ್ಕೆ ಮೀಸಲಾಗಿರುವಂತಾದ್ದು. "ಈ ಮೂರು ವಿಧವಾದ ಶ್ರದ್ಧೆಯ ಬಗೆಯನ್ನಾಲಿಸು" ಎಂದು ಕೃಷ್ಣ ಅರ್ಜುನನಲ್ಲಿ ಹೇಳುತ್ತಾನೆ.

ಸತ್ವಾನುರೂಪಾ ಸರ್ವಸ್ಯ ಶ್ರದ್ಧಾ ಭವತಿ ಭಾರತ ।
ಶ್ರದ್ಧಾಮಯೋಽಯಂ ಪುರುಷೋ ಯೋ ಯಚ್ಛ್ರದ್ಧಃ ಸ ಏವ ಸಃ ॥೩॥

ಸತ್ವ ಅನುರೂಪಾ ಸರ್ವಸ್ಯ ಶ್ರದ್ಧಾ ಭವತಿ ಭಾರತ ।

ಶ್ರದ್ಧಾ ಮಯಃ ಅಯಮ್ ಪುರುಷಃ ಯಃ ಯತ್ ಶ್ರದ್ಧ ಸಃ ಏವ ಸಃ –ಭಾರತ, ಸ್ವಭಾವಕ್ಕೆ ತಕ್ಕಂತೆ ಎಲ್ಲರ ನಂಬಿಕೆಯೂ ಇರುತ್ತದೆ. ಈ ಜೀವ ನಂಬಿಕೆಯ ಸ್ವರೂಪವೇ. ಅವನ ನಂಬಿಕೆ ಎಂತಹದ್ದೋ ಅವನು ಅಂತವನು.

ಜೀವದ ಸ್ವರೂಪಕ್ಕೆ ಅನುಗುಣವಾಗಿಯೇ ಮೂಲ ಶ್ರದ್ಧೆ ಇರುವುದು. ಆದರೆ ಕೆಲವೊಮ್ಮೆ ಅದು ವ್ಯಕ್ತವಾಗದೇ ಇರಬಹುದು. ಇದು ವ್ಯಕ್ತವಾಗದೇ ಇದ್ದಾಗ, ಮನಸ್ಸಿನಲ್ಲಿ ಯಾವ ಬಾಹ್ಯ ಪ್ರಭಾವ ಶ್ರದ್ಧೆ ಇದೆಯೋ ಅದೇ ಅವನ ನಂಬಿಕೆಯಾಗುತ್ತದೆ. ಮನುಷ್ಯ ಶ್ರದ್ಧೆಯ ಕೈಗೊಂಬೆ. ಯಾರ ಸ್ವರೂಪ ಶ್ರದ್ಧೆ ಸಾತ್ವಿಕವೋ ಅವನು ಸಾತ್ವಿಕ; ಯಾರ ಸ್ವರೂಪ ಶ್ರದ್ಧೆ ರಾಜಸವೋ ಅವನು ರಾಜಸ; ಯಾರ ಸ್ವರೂಪ ಶ್ರದ್ಧೆ ತಾಮಸವೋ ಅವನು ತಾಮಸ. ಹಾಗಾಗಿ ಜೀವರಲ್ಲಿ ಮೂರು ವಿಧ: ಸಾತ್ವಿಕ ಶ್ರದ್ಧೆ ಇರುವ ಜೀವ-ಸಾತ್ವಿಕ ಜೀವ; ರಾಜಸ ಶ್ರದ್ಧೆ ಇರುವ ಜೀವ-ರಾಜಸ ಜೀವ; ತಾಮಸ ಶ್ರದ್ಧೆ ಇರುವ ಜೀವ-ತಾಮಸ ಜೀವ. ನಾವು ಧ್ಯಾನದಿಂದ ಮನಸ್ಸನ್ನು ಸ್ಥಗನಗೊಳಿಸಿ, ತುರಿಯ ಸ್ಥಿತಿಯನ್ನು ತಲುಪಿದಾಗ ಬಾಹ್ಯ ಶ್ರದ್ಧೆ ಕಣ್ಮರೆಯಾಗಿ ಕೇವಲ ಸ್ವರೂಪ ಶ್ರದ್ಧೆ ವ್ಯಕ್ತವಾಗುತ್ತದೆ.

ಯಜಂತೇ ಸಾತ್ವಿಕಾ ದೇವಾನ್ ಯಕ್ಷರಕ್ಷಾಂಸಿ ರಾಜಸಾಃ ।
ಪ್ರೇತಾನ್ ಭೂತಗಣಾಂಶ್ಚಾನ್ಯೇ ಯಜಂತೇ ತಾಮಸಾ ಜನಾಃ ॥೪॥

ಯಜಂತೇ ಸಾತ್ವಿಕಾಃ ದೇವಾನ್ ಯಕ್ಷರಕ್ಷಾಂಸಿ ರಾಜಸಾಃ ।
ಪ್ರೇತಾನ್ ಭೂತಗಣಾನ್ ಚ ಅನ್ಯೇ ಯಜಂತೇ ತಾಮಸಾಃ ಜನಾಃ –ಸಾತ್ವಿಕರ ಪೂಜೆ ದೇವತೆಗಳಿಗೆ ಸಲ್ಲುತ್ತದೆ, ರಾಜಸರದು ಯಕ್ಷ-ರಾಕ್ಷಸರಿಗೆ. ತಾಮಸರ ಪೂಜೆ ಪ್ರೇತಗಳಿಗೆ, ಭೂತಗಣಗಳಿಗೆ ಸಲ್ಲುತ್ತದೆ.

ಈ ಶ್ಲೋಕವನ್ನು ಮೇಲ್ನೋಟದಲ್ಲಿ ನೋಡಿದರೆ ಏನೂ ಅರ್ಥವಾಗುವುದಿಲ್ಲ. ಮೇಲ್ನೋಟಕ್ಕೆ "ಸಾತ್ವಿಕರು ದೇವತೆಗಳನ್ನು ಪೂಜೆ ಮಾಡುತ್ತಾರೆ; ರಾಜಸರು ಯಕ್ಷ-ರಾಕ್ಷಸರನ್ನು ಮತ್ತು ತಾಮಸರು ಭೂತ-ಪ್ರೇತಗಳನ್ನು ಪೂಜಿಸುತ್ತಾರೆ" ಎಂದು ಹೇಳಿದಂತೆ ಕಾಣಿಸುತ್ತದೆ. ಆದರೆ ಇಲ್ಲಿ ಅಡಗಿರುವ ಮೂಲ ಅರ್ಥವೇ ಬೇರೆ. ನಮಗೆ ತಿಳಿದಂತೆ ಸಾತ್ವಿಕರಾಗಲೀ, ರಾಜಸರಾಗಲೀ, ತಾಮಸರಾಗಲೀ-ಅವರು ಪೂಜೆ ಮಾಡುವುದು ಭಗವಂತನನ್ನು ಅಥವಾ ದೇವತೆಗಳನ್ನು. ವಾಮಾಚಾರ(Witchcraft) ಮಾಡುವವರನ್ನು ಬಿಟ್ಟರೆ ಇನ್ಯಾರೂ ಪ್ರೇತ-ಪಿಶಾಚಿ-ರಾಕ್ಷಸರನ್ನು ಪೂಜಿಸುವುದಿಲ್ಲ. ಆದ್ದರಿಂದ ಇಲ್ಲಿ ಹೇಳಿರುವ ಮೂಲ ಸಂದೇಶ ಅರ್ಥವಾಗಬೇಕಾದರೆ ನಾವು ಈ ಶ್ಲೋಕವನ್ನು ಆಳವಾಗಿ ವಿಶ್ಲೇಷಿಸಬೇಕು. ಇಲ್ಲಿ 'ದೇವಾನ್' ಎಂದರೆ: ಭಗವಂತನ ಅನೇಕ ರೂಪಗಳು ಮತ್ತು ಭಗವಂತನ ಪರಿವಾರ ದೇವತೆಗಳು' ಎಂದರ್ಥ. 'ಯಜಂತೇ ಸಾತ್ವಿಕಾ ದೇವಾನ್' ಎಂದರೆ-ಸಾತ್ವಿಕರು ಭಗವಂತನ ಅನುಸಂಧಾನದಿಂದ ಮಾಡುವ ಪೂಜೆ ದೇವತೆಗಳನ್ನು ಸೇರುತ್ತದೆ ಎಂದರ್ಥ. ಅದೇ ರೀತಿ "ಯಕ್ಷರಕ್ಷಾಂಸಿ ರಾಜಸಾಃ" ಎಂದರೆ- ರಾಜಸರು ಮಾಡುವ ಪೂಜೆ ಯಕ್ಷ-ರಾಕ್ಷಸರನ್ನು ಸೇರುತ್ತದೆ ಎಂದರ್ಥ. ರಾಜಸರು ಸಾಮಾನ್ಯವಾಗಿ ಭಗವಂತನ ಪಾರಮ್ಯದ ಎಚ್ಚರವಿಲ್ಲದೆ, ಭಯದಿಂದ, ದೇವತೆಗಳು ನಮಗೆ ತೊಂದರೆ ಕೊಡದಿರಲಿ ಎನ್ನುವ ಹರಕೆ ಸಂದಾಯ ಭಾವನೆಯಿಂದ ಪೂಜೆ ಮಾಡುತ್ತಾರೆ. ಈ ರೀತಿ ಪೂಜೆ ಮಾಡಿದಾಗ, ನಾವು ಭಗವಂತನಿಗೆಂದು ಸಲ್ಲಿಸುವ ಪೂಜೆಯನ್ನು ದೇವತೆಗಳ ಹೆಸರಿನ ಯಕ್ಷ-ರಾಕ್ಷಸರು ಬಂದು ಸ್ವೀಕರಿಸುತ್ತಾರೆ. ಇನ್ನು ಮೂರನೆಯ ವರ್ಗ ತಾಮಸ. ಇವರು ಪೂಜೆ ಮಾಡುವುದು ತಮ್ಮ ಅಂತಸ್ತನ್ನು ತೋರಿಸಿಕೊಳ್ಳುವುದಕ್ಕಾಗಿ. ಉದಾಹರಣೆಗೆ ದುರ್ಯೋಧನ ಪಾಂಡವರು ಮಾಡಿದ ಅಶ್ವಮೇಧ ಯಾಗವನ್ನು ಮೀರಿಸುವ ಸಲುವಾಗಿ ಪೌಂಡ್ರಿಕ ಯಾಗ ಮಾಡಿಸಿದಂತೆ. ಹೀಗೆ ದುರುದ್ದೇಶದಿಂದ ತಾಮಸರು ಮಾಡುವ ಪೂಜೆಯನ್ನು ಬಂದು ಸ್ವೀಕರಿಸುವವರು ದೇವತೆಗಳ ಹೆಸರಿನ ಭೂತ-ಪ್ರೇತಗಳು.

ಪೂಜೆಯಲ್ಲಿ ಕೇವಲ ಶ್ರದ್ಧೆ ಮುಖ್ಯವಲ್ಲ ಬದಲಿಗೆ ಅದು ಎಂತಹ ಶ್ರದ್ಧೆ ಎನ್ನುವುದು ಮುಖ್ಯ. ಶಾಸ್ತ್ರ ಗೊತ್ತಿಲ್ಲದಿದ್ದರೂ ಕೂಡಾ, ಸಾತ್ವಿಕ ಶ್ರದ್ಧೆಯಿಂದ: "ಭಗವಂತಾ, ನನಗೆ ಏನೂ ಗೊತ್ತಿಲ್ಲ, ನಾನು ಭಕ್ತಿಯಿಂದ ನಿನ್ನನ್ನು ಆರಾಧನೆ ಮಾಡುತ್ತೇನೆ, ನನ್ನ ತಪ್ಪನ್ನು ಕ್ಷಮಿಸು" ಎಂದು ಶರಣಾಗತಿಯಿಂದ ಬೇಡಿದರೆ ಆ ಪೂಜೆಯನ್ನು ಸ್ವತಃ ಭಗವಂತನೇ ಬಂದು ಸ್ವೀಕಾರ ಮಾಡುತ್ತಾನೆ. ಆದರೆ ಸ್ವಾರ್ಥ, ಅಹಂಕಾರ, ಡಂಭದಿಂದ ಮಾಡುವ ರಾಜಸ ಅಥವಾ ತಾಮಸ ಪೂಜೆಯನ್ನು ಭಗವಂತನಾಗಲೀ, ಅವನ ಪರಿವಾರ ದೇವತೆಗಳಾಗಲೀ ಸ್ವೀಕರಿಸುವುದಿಲ್ಲ.

ನಮ್ಮ ಕರ್ಮ ಕಾಮರಹಿತ(ನಿಷ್ಕಾಮ)ವಾಗಿರಬೇಕು. ಇಲ್ಲಿ ಕಾಮ ಅಂದರೆ ಕೆಟ್ಟಬಯಕೆ. ಬಯಕೆಯಲ್ಲಿ ಎಂದೂ ಸ್ವಾರ್ಥವಿರಕೂಡಾದು. ನಾವು ನನಗೆ ಮಾತ್ರ ಒಳ್ಳೆಯದಾಗಲಿ ಎನ್ನುವ ಸಂಕುಚಿತ ಭಾವವನ್ನು ಬಿಟ್ಟುಬಿಡಬೇಕು.

ಪೂಜೆ ಪುನಸ್ಕಾರ ಮಾಡುವಾಗ ಯಾವುದೋ ಸಂಕುಚಿತ ಉದ್ದೇಶವಿಟ್ಟು ನಾವು ಪೂಜೆ ಮಾಡಬಾರದು. ಉದಾಹರಣೆಗೆ: "ನನ್ನ ವ್ಯವಹಾರದಲ್ಲಿ ಏಳಿಗೆ ಆಗಲಿ ಎಂದು ಯಜ್ಞ ಮಾಡುವುದು; ಮಗಳಿಗೆ ಉತ್ತಮ ವರ ಸಿಗಲಿ ಎನ್ನುವ ಫಲಾಪೇಕ್ಷೆಯಿಂದ ಪೂಜೆ ಮಾಡುವುದು ಇತ್ಯಾದಿ. ನಾವು ದೇವರಲ್ಲಿ ಈ ರೀತಿ ನಮ್ಮ ಕಾಮನೆಗಳ ಪಟ್ಟಿ ಕೊಡಬಾರದು. ಯಾವುದು ಆಗಬೇಕು ಎನ್ನುವುದು ದೇವರಿಗೆ ಗೊತ್ತಿದೆ. ಯಾವುದು ಒಳ್ಳೆಯದು, ಯಾವುದು ಕೆಟ್ಟದ್ದು ಎನ್ನುವುದು ಅವನಿಗೆ ಮಾತ್ರ ಗೊತ್ತಿರುವುದು. ಅದನ್ನು ಅವನು ಕೊಟ್ಟೇ ಕೊಡುತ್ತಾನೆ. ಹೀಗಿರುವಾಗ ನಾವು ನಮ್ಮ ಇಂತಹ ಸಂಕುಚಿತ ಕಾಮದ ಪಟ್ಟಿಯನ್ನು ಹಿಡಿದುಕೊಂಡು ಕರ್ಮ ಮಾಡಿದಾಗ ಆಗುವ ದುರಂತ ಘೋರ. ನಾವು ದೇವರಲ್ಲಿ ಯಾವುದೋ ಬಯಕೆಯನ್ನಿಟ್ಟು ಪೂಜೆ ಮಾಡಿಸುತ್ತೇವೆ. ಆ ಪೂಜೆಗಾಗಿ ಹಣ ವೆಚ್ಚ ಮಾಡಿರುತ್ತೇವೆ. ಆದರೆ ಆ ಬಯಕೆ ಈಡೇರುವುದಿಲ್ಲ. ಆಗ ನಮಗೆ ದೇವರ ಮೇಲೆ ದ್ವೇಷ, ಹಣ ವ್ಯರ್ಥವಾಯಿತು ಎನ್ನುವ ಅಸಮಾಧಾನ. ಹೀಗಾದಾಗ ನಮ್ಮ ಪೂಜೆ ವ್ಯಾಪಾರವಾಗುತ್ತದೆ ಮತ್ತು ಅದು ಭೂತ-ಪ್ರೇತಗಳನ್ನು ಸೇರುತ್ತದೆ. ದೇವರ ಪೂಜೆ ವ್ಯಾಪಾರವಲ್ಲ.

ಅಶಾಸ್ತ್ರವಿಹಿತಂ ಘೋರಂ ತಪ್ಯಂತೇ ಯೇ ತಪೋ ಜನಾಃ ।
ಡಂಭಾಹಂಕಾರಸಂಯುಕ್ತಾಃ ಕಾಮರಾಗಬಲಾನ್ವಿತಾಃ ॥೫॥

ಕರ್ಶಯಂತಃ ಶರೀರಸ್ಥಂ ಭೂತಗ್ರಾಮಮಚೇತಸಃ ।
ಮಾಂ ಚೈವಾಂತಃ ಶರೀರಸ್ಥಂ ತಾನ್ ವಿದ್ಧ್ಯಾಸುರನಿಶ್ಚಯಾನ್ ॥೬॥

ಅಶಾಸ್ತ್ರ ವಿಹಿತಂ ಘೋರಂ ತಪ್ಯಂತೇ ಯೇ ತಪಃ ಜನಾಃ ।
ಡಂಭ ಅಹಂಕಾರ ಸಂಯುಕ್ತಾಃ ಕಾಮ ರಾಗ ಬಲ ಅನ್ವಿತಾಃ
ಕರ್ಶಯಂತಃ ಶರೀರಸ್ಥಂ ಭೂತಗ್ರಾಮಮ್ ಅಚೇತಸಃ ।
ಮಾಂ ಚ ಏವ ಅಂತಃ ಶರೀರಸ್ಥಂ ತಾನ್ ವಿದ್ಧಿ ಆಸುರನಿಶ್ಚಯಾನ್ -- ಕೆಲವು ಜನರು ಶಾಸ್ತ್ರದ ಕಟ್ಟಳೆ ಮೀರಿ ಕೆಟ್ಟ ತಪವನ್ನಾಚರಿಸುತ್ತಾರೆ; ಬೂಟಾಟಿಕೆಯಿಂದ ಮತ್ತು ಹಮ್ಮಿನಿಂದ. ಆಸೆ-ಆಸಕ್ತಿಗಳೇ ಅವರ ಸಾಧನೆಗೆ ಬೆಂಬಲ. ಇಂತಹ ತಿಳಿಗೇಡಿಗಳು ತಮ್ಮ ದೇಹದಲ್ಲಿರುವ ಭೂತ ಸಮೂಹವನ್ನು [ದೇಹವನ್ನು ನಿಯಮಿಸುವ ದೇವತಾಗಣವನ್ನು] ಕಡೆಗಣಿಸುತ್ತಾರೆ. ದೇಹದೊಳಗಿರುವ ನನ್ನ ಹಿರಿಮೆಯನ್ನು ಅಲ್ಲಗಳೆಯುತ್ತಾರೆ. ಅಂತವರು ತಾಮಸ ಸ್ವಭಾವದವರು ಎಂದು ತಿಳಿ.

ಶ್ರದ್ಧೆಯಲ್ಲೇ ಅತ್ಯಂತ ನೀಚವಾದ ತಾಮಸ ಶ್ರದ್ಧೆ ಹೇಗಿರುತ್ತದೆ ಎನ್ನುವುದನ್ನು ಕೃಷ್ಣ ಇಲ್ಲಿ ವಿವರಿಸುತ್ತಾನೆ. ಕೆಲವರು ಶಾಸ್ತ್ರದ ಕಟ್ಟಳೆ ಮೀರಿ ತಪಸ್ಸನ್ನಾಚರಿಸುತ್ತಾರೆ. ಆ ತಪಸ್ಸಿನ ಹಿಂದಿರುವ ಉದ್ದೇಶ ಘೋರ. ಇಲ್ಲಿ ತಪಸ್ಸು ಅಂದರೆ ಕೇವಲ ಋಷಿ-ಮುನಿಗಳು ಮಾಡುವ ತಪಸ್ಸು ಮಾತ್ರವಲ್ಲ. ಶ್ರದ್ಧೆಯಿಂದ ಮಾಡುವ ಯಾವ ಕ್ರಿಯೆಯೂ ತಪಸ್ಸಾಗಬಹುದು[ಈ ಕುರಿತು ಹೆಚ್ಚಿನ ವಿವರಣೆಯನ್ನು ಈ ಅಧ್ಯಾಯದ ಮುಂದಿನ ಭಾಗ(ಶ್ಲೋಕ ೧೪-೧೯)ದಲ್ಲಿ ಕಾಣಬಹುದು]. ತಪಸ್ಸು ಮಾಡುವಾಗ ನಾವು ನನಗೆ ಒಳ್ಳೆಯದಾಗಲಿ ಎಂದು ತಪಸ್ಸು ಮಾಡಬಹುದು ಅಥವಾ ಲೋಕಕ್ಕೆ ಒಳ್ಳೆಯದಾಗಲಿ ಎಂದು ತಪಸ್ಸು ಮಾಡಬಹುದು. ಉದಾಹರಣೆಗೆ ಗಾಯತ್ರಿ:

ಇಲ್ಲಿ "ಧಿಯೋ ಯೋನಃ ಪ್ರಚೋದಯಾತ್" ಎನ್ನುವಲ್ಲಿ "ನಮಗೆಲ್ಲರಿಗೂ ಒಳ್ಳೆಯ ಬುದ್ಧಿ ಕೊಡು ದೇವರೇ" ಎನ್ನುವ ಸಾತ್ವಿಕ ಶ್ರದ್ಧೆ ಇದೆ. ಲೋಕದಲ್ಲಿ ಎಲ್ಲರಿಗೂ ಒಳ್ಳೆಯದಾಗಲಿ ಎಂದು ಮಾಡುವ ತಪಸ್ಸು ಸಾತ್ವಿಕ ತಪಸ್ಸು. ಇದನ್ನು ಬಿಟ್ಟು "ನನಗೆ ಮಾತ್ರ ಒಳ್ಳೆಯದನ್ನು ಕೊಡು" ಎಂದು ಮಾಡುವ ಪೂಜೆ ರಾಜಸ. "ಇನ್ನೊಬ್ಬರು ಹಾಳಾಗಬೇಕು-ನಾನು ಒಳ್ಳೆಯದಾಗಬೇಕು" ಎಂದು ಮಾಡುವ ಪೂಜೆ ತಾಮಸ. ಇವು ಲೋಕಕಂಟಕವಾದ ಘೋರ ಶ್ರದ್ಧೆ.

ಶಾಸ್ತ್ರವಿಹಿತವಾದ ತಪಸ್ಸು ಎಂದರೆ: ಭಗವಂತನ ಪಾರಮ್ಯವನ್ನು ಅರಿತು, ಇನ್ನೊಬ್ಬರ ಬಗ್ಗೆ ಕೆಟ್ಟ ಯೋಚನೆ ಮಾಡದೆ, ಲೋಕದಲ್ಲಿ ಎಲ್ಲರಿಗೂ ಒಳ್ಳೆಯದಾಗಲಿ ಎಂದು ಮಾಡುವ ತಪಸ್ಸು. 'ಸರ್ವೋತ್ಕರ್ಷೆ ದೇವ ದೇವಸ್ಯ ವಿಷ್ಣೋಃ ಮಹಾ ತಾತ್ಪರ್ಯಂ'- ಸಮಸ್ತ ಶಾಸ್ತ್ರಗಳ ತಾತ್ಪರ್ಯ- 'ಭಗವಂತ ಸರ್ವೋತ್ತಮ' ಎನ್ನುವುದು. ಇದನ್ನು ಒಪ್ಪಿಕೊಳ್ಳದೇ ಇರುವುದು ಶಾಸ್ತ್ರ ವಿರುದ್ಧ. ಇದನ್ನು ಒಪ್ಪಿಕೊಂಡು ಲೋಕಕ್ಕೆ ಕೆಟ್ಟದಾಗಲಿ ಎನ್ನುವ ಭಾವನೆ ಮನದಲ್ಲಿ ಮೂಡಿದರೆ ಅದೂ ಕೂಡಾ ಅಶಾಸ್ತ್ರವಿಹಿತವಾಗುತ್ತದೆ. ಯಾವುದು ಶಾಸ್ತ್ರವಿಹಿತ ಅಲ್ಲವೋ ಅದು ಭಗವಂತನಿಗೆ ಪ್ರಿಯವಲ್ಲ. ಇನ್ನೊಬ್ಬರ ಬಗ್ಗೆ ಕೆಟ್ಟದ್ದನ್ನು ಬಯಸಿ, ಸ್ವಾರ್ಥದಿಂದ ಮಾಡುವ ಕರ್ಮ 'ಘೋರ ಕ್ರಿಯೆ' ಎನಿಸುತ್ತದೆ ಎನ್ನುವ ಎಚ್ಚರವನ್ನು ಕೃಷ್ಣ ಇಲ್ಲಿ ಕೊಟ್ಟಿದ್ದಾನೆ. ಇಂತಹ ಕ್ರಿಯೆಯ ಹಿಂದೆ ಡಂಭಾಚಾರ ಮತ್ತು ಅಹಂಕಾರವಿರುತ್ತದೆ. ಇದನ್ನು ದೇವತೆಗಳು ಎಂದೂ ಸ್ವೀಕರಿಸುವುದಿಲ್ಲ.

ಕೆಲವರು ತಮ್ಮ ದೈಹಿಕ ಬಲದಿಂದ ಇನ್ನೊಬ್ಬರನ್ನು ಬಗ್ಗುಬಡಿಯಬೇಕು ಎನ್ನುವ ದುಷ್ಟ ಉದ್ದೇಶವಿಟ್ಟು ತಪವನ್ನಾಚರಿಸುತ್ತಾರೆ. ಯಾರು ತಮ್ಮ ಕಾಮನೆಗಳಿಗೆ ಅಡ್ಡಿಪಡಿಸುತ್ತಾರೋ, ತಮ್ಮ ಇಷ್ಟಾನಿಷ್ಟಗಳಿಗೆ ಸ್ಪಂದಿಸುವುದಿಲ್ಲವೋ, ಅಂಥವರನ್ನು ಮುಗಿಸಬೇಕು ಎನ್ನುವ ಕೆಟ್ಟ ಚಿಂತನೆ ಇವರ ಮನಸ್ಸಿನಲ್ಲಿರುತ್ತದೆ. ಹೀಗೆ ಡಂಭದಿಂದ, ಅಹಂಕಾರದಿಂದ, ಸಂಕುಚಿತ ಕಾಮದಿಂದ, ಸ್ವಾರ್ಥದಿಂದ, ತೋಳ್ಬಲದಿಂದ ಕ್ರಿಯೆ ಮಾಡುವವರು ತಿಳಿಗೇಡಿಗಳು. ಇವರು ತಮ್ಮ ದೇಹವನ್ನು ದಂಡನೆ ಮಾಡಿ ತಪಸ್ಸನ್ನಾಚರಿಸುತ್ತಾರೆ.ಆದರೆ ಅವರಿಗೆ ತಮ್ಮ ದೇಹದಲ್ಲಿರುವ ಭೂತಗ್ರಾಮದ(ದೇವತೆಗಳ ಸಮೂಹದ) ಎಚ್ಚರವಿರುವುದಿಲ್ಲ. ಸಮಸ್ತ ದೇವತಾಗಣವನ್ನು ನಿರ್ಲಕ್ಷ್ಯ ಮಾಡಿ, ದೇವತೆಗಳ ಒಳಗಿರುವ ಭಗವಂತನನ್ನೂ ನಿರ್ಲಕ್ಷ್ಯ ಮಾಡಿ, ದೇಹದಂಡನೆ ಮಾಡಿಕೊಂಡು ಅನುಷ್ಠಾನ ಮಾಡುವ ಇವರು ಅಸುರರೆನಿಸುತ್ತಾರೆ. ಇವರು 'ಇಂದ್ರಿಯ ಕರ್ಮವೇ ಸರ್ವಸ್ವ-ಅದರಿಂದಾಚೆಗೆ ಏನೂ ಇಲ್ಲ' ಎಂದು ತಿಳಿದಿರುತ್ತಾರೆ.

ಕೃಷ್ಣನ ಈ ವಿವರಣೆಯನ್ನು ನೋಡಿದಾಗ ನಮ್ಮ-ನಿಮ್ಮೊಳಗಿರುವ ಈ ಅಸುರ(ಪ್ರಭಾವದಿಂದ ಬೆಳೆದ ಅಂಧಃಶ್ರದ್ಧೆ) ಎಷ್ಟು ಭಯಾನಕ ಎನ್ನುವ ಅಂಶ ನಮಗೆ ತಿಳಿಯುತ್ತದೆ. ಇದನ್ನು ನಾವು ನಮ್ಮ ಪ್ರತಿಯೊಂದು ಕ್ರಿಯೆಯಲ್ಲೂ ಗುರುತಿಸಿಕೊಂಡು ತಿದ್ದಿಕೊಳ್ಳಬೇಕು. ಇದಕ್ಕಾಗಿ ಕೃಷ್ಣ ಮುಂದಿನ ಶ್ಲೋಕಗಳಲ್ಲಿ ಆಹಾರ, ತಪಸ್ಸು, ದಾನ ಇತ್ಯಾದಿಯಲ್ಲಿ ಸಾತ್ವಿಕ, ರಾಜಸ ಮತ್ತು ತಾಮಸ ಪ್ರಭೇದ ಹೇಗಿರುತ್ತದೆ ಎನ್ನುವುದನ್ನು ವಿವರಿಸುತ್ತಾನೆ.

ಆಹಾರಸ್ತ್ವಪಿ ಸರ್ವಸ್ಯ ತ್ರಿವಿಧೋ ಭವತಿ ಪ್ರಿಯಃ ।

ಯಜ್ಞಸ್ತಪಸ್ತಥಾ ದಾನಂ ತೇಷಾಂ ಭೇದಮಿಮಂ ಶೃಣು ॥೭॥

ಆಹಾರಃ ತು ಅಪಿ ಸರ್ವಸ್ಯ ತ್ರಿವಿಧಃ ಭವತಿ ಪ್ರಿಯಃ ।
ಯಜ್ಞಃ ತಪಃ ತಥಾ ದಾನಂ ತೇಷಾಂ ಭೇದಮ್ ಇಮಮ್ ಶೃಣು –ಎಲ್ಲರು ಉಣ್ಣುವ ಆಹಾರವೂ ಮೂರು ತೆರನಾಗಿ ಮೆಚ್ಚಿಗೆಯಾಗುತ್ತದೆ. ಯಜ್ಞ, ತಪಸ್ಸು, ದಾನ ಕೂಡಾ. ಅವುಗಳ ಈ ಬಗೆಯನ್ನಾಲಿಸು.

ನಾವು ತಿನ್ನುವ ಆಹಾರ ಕೂಡಾ ಮೂರು ತೆರನಾಗಿರುತ್ತದೆ. ಸಾತ್ವಿಕ, ರಾಜಸ ಮತ್ತು ತಾಮಸ ಆಹಾರ. "ಅನ್ನಂ ಅಷಿತಂ ತ್ರೇಧಾ ವಿಧ್ಯತೆ" (ಛಾಂದೋಗ್ಯೋಪನಿಷತ್-೫-೧) ಎನ್ನುವಂತೆ ನಾವು ಸೇವಿಸುವ ಆಹಾರವನ್ನು ನಮ್ಮೊಳಗಿರುವ ಪ್ರಾಣ ಮತ್ತು ವೈಶ್ವಾನರರು ಮೂರು ಬಗೆಯನ್ನಾಗಿ(ಸೂಕ್ಷ್ಮ, ಮಧ್ಯ ಮತ್ತು ಸ್ಥೂಲ) ವಿಂಗಡಿಸಿ ಅದನ್ನು ದೇಹದ ವಿವಿಧ ಭಾಗಗಳಿಗೆ ಸರಬರಾಜು ಮಾಡುತ್ತಾರೆ. ನಮ್ಮ ಆಹಾರಕ್ಕೂ ಮನಸ್ಸಿಗೂ ನೇರ ಸಂಬಂಧವಿದೆ. ಇದನ್ನು ನಮ್ಮ ಪ್ರಾಚೀನರು ಅರಿತಿದ್ದರು. ಅದಕ್ಕಾಗಿ ಮನಸ್ಸಿನ ಮೇಲೆ ಪ್ರಭಾವ ಬೀರುವ ಆಹಾರವನ್ನು ಅವರು ನಿಷೇಧಿಸಿದರು. ಉದಾಹರಣೆಗೆ ಬೆಳ್ಳುಳ್ಳಿ. ಇದು ಔಷಧೀಯ ವಸ್ತು. ಆದರೆ ಇದನ್ನು ನಿತ್ಯ ಆಹಾರದಲ್ಲಿ ಬಳಸುವುದನ್ನು ನಿಷೇಧಿಸಿದ್ದಾರೆ. ಏಕೆಂದರೆ ಇದು ನಮ್ಮ ಬುದ್ಧಿ ಬೆಳವಣಿಗೆಗೆ ಪೂರಕವಲ್ಲ. ಇದೇ ರೀತಿ ನುಗ್ಗೆಕಾಯಿ, ತೊಂಡೆಕಾಯಿ ಇತ್ಯಾದಿ. ಅಧ್ಯಯನ ಮಾಡುವವರಿಗೆ ಇದು ನಿಷಿದ್ಧ (ಔಷಧವಾಗಿ ಬಳಸಬಹುದು). ಹೀಗೆ ಮನುಷ್ಯನ ಬುದ್ಧಿಗೆ ಯಾವ ವಿಧದ ಆಹಾರ ಸೂಕ್ತ ಎನ್ನುವುದನ್ನು ಮೊತ್ತ ಮೊದಲ ಬಾರಿಗೆ ಕೃಷ್ಣ ಜಗತ್ತಿಗೆ ಕೊಟ್ಟ.

ಆಹಾರದ ಜೊತೆಗೆ ನಾವು ಮಾಡುವ ದೇವರ ಪೂಜೆ, ತಪಃ, ನಮ್ಮ ಚಿಂತನಾ ಕ್ರಮ, ದಾನ, ಜೀವನದ ನಡೆ, ಮಾತು ಎಲ್ಲವುದರಲ್ಲೂ ಈ ಮೂರು ವಿಧವನ್ನು ಗುರುತಿಸಬಹುದು. ಕೃಷ್ಣ ಮುಂದಿನ ಶ್ಲೋಕಗಳಲ್ಲಿ ಆಹಾರ, ಯಜ್ಞ, ತಪಸ್ಸು ಮತ್ತು ದಾನದಲ್ಲಿ ಈ ಮೂರು ಬಗೆಯನ್ನು ಗುರುತಿಸುವುದು ಹೇಗೆ ಎನ್ನುವುದನ್ನು ವಿವರಿಸುತ್ತಾನೆ.

ಆಯುಃಸತ್ವಬಲಾರೋಗ್ಯಸುಖಪ್ರೀತಿವಿವರ್ಧನಾಃ ।
ರಸ್ಯಾಃ ಸ್ನಿಗ್ಧಾಃ ಸ್ಥಿರಾ ಹೃದ್ಯಾ ಆಹಾರಾಃ ಸಾತ್ವಿಕಪ್ರಿಯಾಃ ॥೮॥

ಆಯುಃ ಸತ್ವ ಬಲ ಆರೋಗ್ಯ ಸುಖ ಪ್ರೀತಿ ವಿವರ್ಧನಾಃ ।
ರಸ್ಯಾಃ ಸ್ನಿಗ್ಧಾಃ ಸ್ಥಿರಾ ಹೃದ್ಯಾಃ ಆಹಾರಾಃ ಸಾತ್ವಿಕ ಪ್ರಿಯಾಃ –ಇವು ಸಾತ್ವಿಕರಿಗೆ ಮೆಚ್ಚುಗೆಯಾದ ತಿನಿಸುಗಳು: ಆಯುಸ್ಸು, ಒಳ್ಳೆಯತನ, ತ್ರಾಣ, ಆರೋಗ್ಯವನ್ನು ಹೆಚ್ಚಿಸುವಂತವು; ಬಹಳ ಕಾಲ ಮೆಚ್ಚಿಗೆಯಾಗುವಂತವು; ತಿಂದಾಗ ಖುಷಿಯಾಗುವಂತವು; ರುಚಿಯಾದಂತವು; ಕಸುವಿರುವಂತವು; ಧೀರ್ಘಕಾಲ ಪರಿಣಾಮ ಬೀರುವಂತವು; ಮತ್ತೆಮತ್ತೆ ಮನ ಸೆಳೆಯುವಂತವು.

ಈ ಶ್ಲೋಕದಲ್ಲಿ ಕೃಷ್ಣ ಸಾತ್ವಿಕ ಆಹಾರದ ಬಗ್ಗೆ ವಿವರಿಸಿದ್ದಾನೆ. ಯಾವ ಆಹಾರ ನಮ್ಮ ಆಯುಸ್ಸಿನ ವೃದ್ಧಿಗೆ ಪೂರಕವೋ; ಯಾವ ಆಹಾರ ನಮಗೆ ಸೌಮ್ಯ ಸ್ವಭಾವವನ್ನು ಕೊಡುತ್ತದೋ; ಯಾವ ಆಹಾರ ದೇಹಕ್ಕೆ

ಪೌಷ್ಟಿಕಾಂಶವನ್ನು ಕೊಡುತ್ತದೋ; ಯಾವ ಆಹಾರ ಆರೋಗ್ಯವನ್ನು ಕೊಡುತ್ತದೋ ಅಂತಹ ಆಹಾರ ಸಾತ್ವಿಕ ಆಹಾರ. ಈ ಆಹಾರವನ್ನು ನೋಡಿದಾಗ ನಮಗೆ ಕೆಟ್ಟ ಭಾವನೆ ಬರುವುದಿಲ್ಲ. ಅದು ರಸವತ್ತಾಗಿರುತ್ತದೆ, ರುಚಿಯಾಗಿರುತ್ತದೆ. ಇದನ್ನು ತಿಂದಾಗ ನಮ್ಮ ಹೊಟ್ಟೆ ತುಂಬುತ್ತದೆ ಮತ್ತು ತಕ್ಷಣ ಹಸಿವೆಯಾಗುವುದಿಲ್ಲ. ನೋಡಲು ಹೃದಯಂಗಮವಾಗಿರುತ್ತದೆ, ತಿಂದ ನೆನಪು ಉಳಿಯುವಂತಿರುತ್ತದೆ.

ನಿಜವಾದ ಸಾತ್ವಿಕರು ಏನು ತಿನ್ನುತ್ತಾರೋ ಅದು ಸಾತ್ವಿಕ ಆಹಾರವಾಗಿರುತ್ತದೆ. ಪ್ರಕೃತಿ ಸಹಜವಾದ, ರಸವತ್ತಾದ, ರುಚಿಯಾದ, ಹಣ್ಣು-ಹಂಪಲು, ಗಡ್ಡೆ-ಗೆಣಸು, ಬೇಳೆ-ಕಾಳು, ಕಂದ-ಮೂಲಗಳು ಸಾಮಾನ್ಯವಾಗಿ ಸಾತ್ವಿಕ ಆಹಾರವಾಗಿರುತ್ತದೆ. ಆಯುಸ್ಸನ್ನು ಹೆಚ್ಚಿಸುವ ಶುದ್ಧ ತುಪ್ಪ(ಮಿತವಾಗಿ ಬಳಸಿದಾಗ) ಸಾತ್ವಿಕ ಆಹಾರ.

ಕಟ್ವಮ್ಲಲವಣಾತ್ಯುಷ್ಣತೀಕ್ಷ್ಣರೂಕ್ಷವಿದಾಹಿನಃ ।
ಆಹಾರಾ ರಾಜಸಸ್ಯೇಷ್ಟಾ ದುಃಖಶೋಕಾಮಯಪ್ರದಾಃ ॥೯॥

ಕಟು ಆಮ್ಲ ಲವಣ ಅತಿ ಉಷ್ಣ ತೀಕ್ಷ್ಣ ರೂಕ್ಷ ವಿದಾಹಿನಃ ।
ಆಹಾರಾಃ ರಾಜಸಸ್ಯ ಇಷ್ಟಾಃ ದುಃಖ ಶೋಕ ಆಮಯ ಪ್ರದಾಃ –ಇವು ರಾಜಸರಿಗೆ ಮೆಚ್ಚಿಗೆಯಾದ ತಿನಿಸುಗಳು: ಅತಿಯಾದ ಖಾರ, ಹುಳಿ, ಉಪ್ಪು, ತುಂಬಾ ಬಿಸಿ, ಬಿರುಸು, ನೀರಸ ಮತ್ತು ಉರಿಬರಿಸುವಂತವು; ದುಃಖ-ದುಮ್ಮಾನ ಮತ್ತು ಖಾಯಿಲೆ ಬರಿಸುವಂತವು.

ಇಲ್ಲಿ ರಾಜಸ ಆಹಾರದ ವಿವರಣೆಯನ್ನು ಕೃಷ್ಣ ಕೊಟ್ಟಿದ್ದಾನೆ. ವಿಪರೀತ ಖಾರ, ವಿಪರೀತ ಹುಳಿ, ಅತಿ ಉಪ್ಪು, ರಾಜಸ ಆಹಾರವೆನಿಸುತ್ತದೆ. ಅತಿಯಾದ ಬಿಸಿಯನ್ನು ಕುಡಿಯುವುದು; ಬಿರುಸು ಮತ್ತು ನೀರಸವಾದ ಆಹಾರವನ್ನು ಸೇವಿಸುವುದು; ಎದೆ ಸುಡುವ ಆಹಾರ ಸೇವನೆ-ಇವು ರಾಜಸರ ಲಕ್ಷಣವಾಗಿರುತ್ತದೆ. ಈ ಆಹಾರ ಸೇವನೆಯಿಂದ ಮಾನಸಿಕ ಮತ್ತು ದೈಹಿಕ ವೇದನೆ ಹೆಚ್ಚುತ್ತದೆ. ಇದು ಖಾಯಿಲೆಯನ್ನು ತರಬಲ್ಲ ಆಹಾರ.

ಹಸಿಮೆಣಸಿನ ಕಾಯಿಯನ್ನು ನೇರವಾಗಿ ತಿನ್ನುವುದು, ಹುಣಸೇ ಹಣ್ಣನ್ನು ಅತಿಯಾಗಿ ತಿನ್ನುವುದು, ಯಾವಾಗಲೂ ಹೆಚ್ಚು ಉಪ್ಪನ್ನು ಬಳಸುವುದು, ಗಂಟಲು ಸುಡುವ ಕಾಫಿ ಕುಡಿಯುವುದು, ಅತಿಯಾಗಿ ಸಾಸಿವೆ ಮತ್ತು ಮಸಾಲೆ ಬಳಸುವುದು, ರಸವಿಲ್ಲದ ಆಹಾರ(**Ex:Chewing gum**) ಸೇವನೆ; ಇತ್ಯಾದಿ ರಾಜಸರ ಆಹಾರ ಕ್ರಮಕ್ಕೆ ಕೆಲವು ಉದಾಹರಣೆಗಳು.[ಒಂದು ವೇಳೆ ಇಲ್ಲಿ ಹೇಳಿದ ಈ ಆಹಾರವನ್ನು ರೋಗ ಪರಿಹಾರಕ್ಕಾಗಿ ವೈದ್ಯರು ಸೂಚಿಸಿದ್ದರೆ ಅದು ರೋಗಿಗೆ ಸಾತ್ವಿಕ ಆಹಾರವೆನಿಸುತ್ತದೆ].

ಯಾತಯಾಮಂ ಗತರಸಂ ಪೂತಿ ಪರ್ಯುಷಿತಂ ಚ ಯತ್ ।
ಉಚ್ಛಿಷ್ಟಮಪಿ ಚಾಮೇಧ್ಯಂ ಭೋಜನಂ ತಾಮಸಪ್ರಿಯಮ್ ॥೧೦॥

ಯಾತಯಾಮಂ ಗತರಸಂ ಪೂತಿ ಪರ್ಯುಷಿತಂ ಚ ಯತ್ ।
ಉಚ್ಛಿಷ್ಟಮ್ ಅಪಿ ಚ ಅಮೇಧ್ಯಂ ಭೋಜನಂ ತಾಮಸ ಪ್ರಿಯಮ್ – ಇದು ತಾಮಸರಿಗೆ ಮೆಚ್ಚಿನ ತಿನಿಸು: ಅಟ್ಟು ಜಾವ ಕಳೆದದ್ದು, ರುಚಿ ಕಳೆದುಕೊಂಡದ್ದು, ಹಳಸಿದ್ದು, ತಂಗಳಾದದ್ದು, ಎಂಜಲು ಮತ್ತು ಕೊಳಕಾದದ್ದು.

ತಾಮಸರಿಗೆ ಜೀವನದಲ್ಲಿ ಅತಿದೊಡ್ಡ ಸಂಗತಿ ಎಂದರೆ ಭೋಜನ. ಇವರು ಆಹಾರವನ್ನು ದೇವರಿಗೆ ಸಮರ್ಪಿಸದೇ ಸೇವನೆ ಮಾಡುತ್ತಾರೆ. ನೀರಸವಾದ, ಹಳಸಿದ, ವಾಸನೆ ಬರುವ, ರುಚಿಗೆಟ್ಟ ಆಹಾರ ತಾಮಸರಿಗೆ ಇಷ್ಟ. ಇವರು ಎಂಜಲು ಊಟವನ್ನು ಇಷ್ಟಪಡುತ್ತಾರೆ. [ಉದಾಹರಣೆಗೆ ಒಂದೇ ತಟ್ಟೆಯಲ್ಲಿ ಅನೇಕ ಮಂದಿ ಎಂಜಲು ಹಂಚಿಕೊಂಡು ತಿನ್ನುವುದು].

ಹೀಗೆ ಆಹಾರದಿಂದ ಹೇಗೆ ವ್ಯಕ್ತಿಯನ್ನು ಗುರುತಿಸಬಹುದು ಎನ್ನುವ ವಿಧಾನವನ್ನು ವಿವರಿಸಿದ ಕೃಷ್ಣ, ಮುಂದೆ ನಮ್ಮ ಆಚಾರದಿಂದ(ಯಜ್ಞ, ತಪಸ್ಸು, ದಾನ) ವ್ಯಕ್ತಿಯ ಸ್ವಭಾವವನ್ನು ಅರಿಯುವ ವಿಧಾನವನ್ನು ವಿವರಿಸುತ್ತಾನೆ.

ಅಫಲಾಕಾಂಕ್ಷಿ ಭಿರ್ಯಜ್ಞೋ ವಿಧಿದೃಷ್ಟೋ ಯ ಇಜ್ಯತೇ ।
ಯಷ್ಟವ್ಯಮೇವೇತಿ ಮನಃ ಸಮಾಧಾಯ ಸ ಸಾತ್ವಿಕಃ ॥೧೧॥

ಅಫಲ ಆಕಾಂಕ್ಷಿಭಿಃ ಯಜ್ಞಃ ವಿಧಿದೃಷ್ಟೋ ಯಃ ಇಜ್ಯತೇ ।
ಯಷ್ಟವ್ಯಮ್ ಏವ ಇತಿ ಮನಃ ಸಮಾಧಾಯ ಸಃ ಸಾತ್ವಿಕಃ –ಶಾಸ್ತ್ರದ ಕಟ್ಟಳೆಗೆ ಸರಿಯಾಗಿ, ಫಲದ ನಂಟಿಲ್ಲದೆ, ಕರ್ತವ್ಯ ಎನ್ನುವ ಭಾವದಿಂದ ಮನ ಮೆಚ್ಚಿ ಮಾಡುವ ಯಜ್ಞ ಸಾತ್ವಿಕ ಯಜ್ಞ.

ಯಜ್ಞ ಮಾಡುವವರೆಲ್ಲಾ ಸಾತ್ವಿಕರಲ್ಲ. ಯಜ್ಞದಲ್ಲೂ ಸಾತ್ವಿಕ, ರಾಜಸ ಮತ್ತು ತಾಮಸವೆಂಬ ಮೂರು ಪ್ರಭೇದವಿದೆ. ಈ ಶ್ಲೋಕದಲ್ಲಿ ಕೃಷ್ಣ ಸಾತ್ವಿಕ ಯಜ್ಞ ಹೇಗಿರುತ್ತದೆ ಎನ್ನುವುದನ್ನು ವಿವರಿಸಿದ್ದಾನೆ. ಯಜ್ಞ ಎಂದರೆ ಕೇವಲ ಅಗ್ನಿಕುಂಡದಲ್ಲಿ ಮಾಡುವ ಪೂಜೆ ಮಾತ್ರ ಅಲ್ಲ. ಪೀಠದಲ್ಲಿ ಭಗವಂತನನ್ನು ಪೂಜಿಸುವುದೂ ಯಜ್ಞ, ಮಾನಸಿಕವಾಗಿ ಭಗವಂತನ ಧ್ಯಾನ ಮಾಡುವುದೂ ಯಜ್ಞ. ಯಾವುದೇ ಫಲ ಕಾಮನೆ ಇಲ್ಲದೆ, ದೇವರು ಪ್ರಸನ್ನನಾಗಲಿ-ಆತನ ದಯಾ ದೃಷ್ಟಿ ನನ್ನ ಮೇಲಿರಲಿ ಎಂದು, ವಿಧಿಪೂರ್ವಕವಾಗಿ ಮಾಡುವ ಪೂಜೆ ಸಾತ್ವಿಕ ಯಜ್ಞವೆನಿಸುತ್ತದೆ. ಯಾಂತ್ರಿಕವಾಗಿ, ಮಂತ್ರದ ಅರ್ಥ ಗೊತ್ತಿಲ್ಲದೆ, ಯಾವುದೋ ಸಂಕುಚಿತ ಫಲಾಪೇಕ್ಷೆಯಿಂದ ಪೂಜೆ ಮಾಡಿದರೆ ಅದು ಸಾತ್ವಿಕ ಯಜ್ಞವಾಗುವುದಿಲ್ಲ.

ಇಲ್ಲಿ 'ವಿಧಿಪೂರ್ವಕವಾಗಿ' ಎಂದು ಹೇಳಲಾಗಿದೆ. ಇದು ಬಹಳ ಮುಖ್ಯವಾದ ವಿಚಾರ. ಉದಾಹರಣೆಗೆ ನಾವು ಪೂಜೆ ಮಾಡುವಾಗ ಘಂಟಾನಾದ ಮಾಡುತ್ತೇವೆ; ಶಂಖನಾದ ಮಾಡುತ್ತೇವೆ. ಈ ರೀತಿ ಯಾವುದೇ ಪೂಜಾ ವಿಧಾನವಿದ್ದರೂ ಕೂಡಾ, ಅದನ್ನು ಮಾಡುವ ಮೊದಲು ಏಕೆ ಮಾಡುತ್ತಿದ್ದೇವೆ ಎನ್ನುವ ತಿಳುವಳಿಕೆ ನಮಗೆ

ಅಗತ್ಯ. ಘಂಟೆಯನ್ನು ಗಣಗಣ ಎಂದು ಕರ್ಕಶವಾಗಿ ಒಂದೇ ಸಮನೆ ಬಾರಿಸಬಾರದು. ಘಂಟಾನಾದ ಮಾಡುವಾಗ ಅದರಿಂದ ಓಂಕಾರನಾದ ಹೊರ ಹೊಮ್ಮಬೇಕು. ಈ ರೀತಿ ಓಂಕಾರ ನಾದ ಹೊರಹೊಮ್ಮಿದಾಗ-ಆ ನಾದ ಕೇಳಿಸುವ ಪ್ರದೇಶದಲ್ಲಿರುವ ಎಲ್ಲಾ ದುಷ್ಟ ಶಕ್ತಿಗಳೂ ಅಲ್ಲಿಂದ ಓಡಿ ಹೋಗುತ್ತವೆ ಮತ್ತು ಈ ನಾದ ದೇವತಾ ಶಕ್ತಿಗಳನ್ನು ಆಕರ್ಷಿಸುತ್ತದೆ. ಇದರಿಂದ ಪೂಜೆಗೆ ಬೇಕಾದ ಶುಭ್ರ ವಾತಾವರಣ ನಿರ್ಮಾಣವಾಗುತ್ತದೆ. ಇಲ್ಲಿ ಮನಃಪೂರ್ವಕವಾಗಿ ದುಷ್ಟಶಕ್ತಿಗಳು ಹೋಗಲಿ, ದೇವತಾಶಕ್ತಿಗಳು ಬರಲಿ ಎಂದು ಪ್ರಾರ್ಥಿಸಿ, ಘಂಟೆಯಿಂದ ಓಂಕಾರನಾದ ತೆಗೆಯುವುದು ಬಹಳ ಮುಖ್ಯ. ಘಂಟೆಯಿಂದ ಎಂದೂ ಅಪಸ್ವರ ಬರಬಾರದು. ಘಂಟಾನಾದಕ್ಕೆ ಒಂದು ಶ್ರುತಿ ಇದೆ. ಸಪ್ತ ಸ್ವರಗಳಿಗೆ ಸಪ್ತ ಸ್ವರದ ಘಂಟೆಗಳಿವೆ. ಅದನ್ನು ಶ್ರುತಿಬದ್ಧವಾಗಿ ಬಾರಿಸಬೇಕು. ಇದು ಓಂಕಾರದಿಂದ ವಾತಾವರಣ ಶುದ್ಧಿ ಮಾಡುವ ಅದ್ಭುತ ಪ್ರಕ್ರಿಯೆ. ಇದು ಕೇವಲ ಒಂದು ಉದಾಹರಣೆಯಷ್ಟೆ. ಹೀಗೆ ನಾವು ನಮ್ಮ ಪ್ರತಿಯೊಂದು ಕ್ರಿಯೆಯನ್ನು ತಿಳಿದು ಮನಃಪೂರ್ವಕವಾಗಿ ಮಾಡಬೇಕು; ಮಾಡುವ ಕ್ರಿಯೆಯಲ್ಲಿ ನಮಗೆ ಖುಷಿ ಇರಬೇಕು. ಹೀಗೆ ಮಾಡಿದಾಗ ಮಾತ್ರ ಅದು ಸಾತ್ವಿಕ ಯಜ್ಞ ಎನಿಸುತ್ತದೆ.

ಅಭಿಸಂಧಾಯ ತು ಫಲಂ ಡಂಭಾರ್ಥಮಪಿ ಚೈವ ಯತ್।
ಇಜ್ಯತೇ ಭರತಶ್ರೇಷ್ಠ ತಂ ಯಜ್ಞಂ ವಿದ್ಧಿ ರಾಜಸಮ್ ॥೧೨॥

ಅಭಿಸಂಧಾಯ ತು ಫಲಮ್ ಡಂಭ ಅರ್ಥಮ್ ಅಪಿ ಚ ಏವ ಯತ್ ।
ಇಜ್ಯತೇ ಭರತಶ್ರೇಷ್ಠ ತಮ್ ಯಜ್ಞಂ ವಿದ್ಧಿ ರಾಜಸಮ್ -ಓ ಭರತಶ್ರೇಷ್ಠಾ, ಫಲದ ಬಯಕೆಯಿಂದ ಅಥವಾ ಬೂಟಾಟಿಕೆಗಾಗಿ ಮಾಡುವ ಯಜ್ಞ ರಾಜಸವೆಂದು ತಿಳಿ.

ಸ್ವಾರ್ಥದಿಂದ ಒಂದು ವಿಶೇಷ ಫಲವನ್ನು ಬಯಸಿ, ಡಂಭಾಚಾರದಿಂದ ಮಾಡುವ ಯಜ್ಞ ರಾಜಸ ಯಜ್ಞ ಎನಿಸುತ್ತದೆ. ಯಾವುದೇ ಯಜ್ಞ ಭಗವಂತನನ್ನು ಸೇರಬೇಕಾದರೆ ಅದನ್ನು ನಾವು ಭಕ್ತಿಯಿಂದ ಮಾಡಬೇಕು. ಭಗವಂತನಲ್ಲಿ ರತರಾದವರಲ್ಲಿ ನಾವು ಶ್ರೇಷ್ಠರಾಗಿ(ಭರತಶ್ರೇಷ್ಠ) ಕ್ರಿಯೆ ಮಾಡಬೇಕು. ಇದಿಲ್ಲದೇ ಪ್ರಚಾರಕ್ಕಾಗಿ ಮಾಡುವ ಯಜ್ಞ ರಾಜಸ ಯಜ್ಞವಾಗುತ್ತದೆ.

ವಿಧಿಹೀನಮಸೃಷ್ಟಾನ್ನಂ ಮಂತ್ರ ಹೀನಮದಕ್ಷಿಣಮ್।
ಶ್ರದ್ಧಾವಿರಹಿತಂ ಯಜ್ಞಂ ತಾಮಸಂ ಪರಿಚಕ್ಷತೇ ॥೧೩॥

ವಿಧಿಹೀನಮ್ ಅಸೃಷ್ಟ ಅನ್ನಮ್ ಮಂತ್ರ ಹೀನಮ್ ಅದಕ್ಷಿಣಮ್।
ಶ್ರದ್ಧಾ ವಿರಹಿತಂ ಯಜ್ಞಂ ತಾಮಸಂ ಪರಿಚಕ್ಷತೇ -ಶಾಸ್ತ್ರಕ್ಕೆ ಅನುಗುಣವಾಗಿಲ್ಲ; ಅನ್ನದಾನವಿಲ್ಲ; ಮಂತ್ರವಿಲ್ಲ; ದಕ್ಷಿಣೆಯಿಲ್ಲ; ಮಾಡುವ ಕ್ರಿಯೆಯಲ್ಲಿ ನಂಬಿಕೆಯೂ ಇಲ್ಲ. ಇಂತಹ ಯಜ್ಞವನ್ನು ತಾಮಸ ಎನ್ನುತ್ತಾರೆ.

ಮಂತ್ರ ಸರಿಯಾಗಿ ಹೇಳದೇ ಇರುವುದು, ಮಂತ್ರವನ್ನು ಕ್ರಮ ತಪ್ಪಿ ಹೇಳುವುದು, ಪದ ಉಚ್ಛಾರ ಸರಿಯಾಗಿಲ್ಲದೇ ಇರುವುದು-ಇವೆಲ್ಲವೂ ವಿಧಿಹೀನ. ಈ ರೀತಿ ಮಾಡುವ ಯಜ್ಞ ತಾಮಸ ಯಜ್ಞ. ಯಾವುದೇ ಯಜ್ಞದಲ್ಲಿ ಹೇಗೆ ಪ್ರತಿಮೆಯ ಮೂಲಕ ಮತ್ತು ಅಗ್ನಿಯ ಮೂಲಕ ಆರಾಧನೆ ನಡೆಯುತ್ತದೆಯೋ, ಅದೇ ರೀತಿ ಚರಮೂರ್ತಿಗಳ ಆರಾಧನೆ ಬಹಳ ಮುಖ್ಯ. ಅನ್ನದಾನ ಮಾಡುವ ಮೂಲಕ ಪ್ರತಿಯೊಬ್ಬರೊಳಗೂ ಇರುವ ಭಗವಂತನ ಆರಾಧನೆ ಈ ಚರಮೂರ್ತಿ ಆರಾಧನೆ. ಹೀಗೆ ಅನ್ನದಾನವಿಲ್ಲದೆ, ದಕ್ಷಿಣೆ(ವೈದಿಕರಿಗೆ ಅವರ ಜೀವನ ನಿರ್ವಾಹಣೆಗಾಗಿ ನಾವು ಸಲ್ಲಿಸುವ ಸೇವೆ) ಇಲ್ಲದೆ ಮಾಡುವ ಯಜ್ಞ ತಾಮಸ ಯಜ್ಞ. ಇವೆಲ್ಲವುದಕ್ಕಿಂತ ಮುಖ್ಯವಾದುದು ಶ್ರದ್ಧೆ. ಭಗವಂತನ ಮೇಲೆ ಅಚಲವಾದ ಶ್ರೇಷ್ಠ ಶ್ರದ್ಧೆ ಇಲ್ಲದೇ ಮಾಡುವ ಯಾವುದೇ ಯಜ್ಞವಿರಲಿ-ಅದು ಸರ್ವತ್ರ ತಾಮಸ ಯಜ್ಞವಾಗುತ್ತದೆ.

ಆಹಾರ ಮತ್ತು ಯಜ್ಞದ ನಂತರ ಕೃಷ್ಣ ಮುಂದಿನ ಶ್ಲೋಕಗಳಲ್ಲಿ ಮೂರು ವಿಧದ ತಪಸ್ಸಿನ ಬಗ್ಗೆ ವಿವರಿಸುತ್ತಾನೆ. ಮೂಲಭೂತವಾಗಿ ತಪಸ್ಸಿನಲ್ಲಿ ಮೂರು ವಿಧ. ನಮ್ಮ ನಡೆಯಲ್ಲಿ ಶಿಸ್ತುಬದ್ಧತೆಯನ್ನು ತರುವುದು-ತಪಸ್ಸು; ಆಳವಾದ ಚಿಂತನೆ-ತಪಸ್ಸು; ಮನಃಶುದ್ಧಿಗಾಗಿ ಮಾಡುವ ದೇಹದಂಡನೆಯೂ-ತಪಸ್ಸು. ತಪಸ್ಸು ಮಾಡಲು ಕಾಡಿಗೆ ಹೋಗಬೇಕಾಗಿಲ್ಲ. ಮನೆಯಲ್ಲೇ ಇದ್ದು ತಪಸ್ಸು ಮಾಡಬಹುದು. ಸಾತ್ವಿಕ, ರಾಜಸ ಮತ್ತು ತಾಮಸ ತಪಸ್ಸನ್ನು ವಿವರಿಸುವ ಮೊದಲು ಇಲ್ಲಿ ಕೃಷ್ಣ ಶರೀರ, ಮಾತು ಮತ್ತು ಮನ ಎನ್ನುವ ಮೂಲಭೂತವಾದ ಮೂರು ತಪಸ್ಸಿನ ವಿವರಣೆಯನ್ನು ಮುಂದಿನ ಮೂರು ಶ್ಲೋಕಗಳಲ್ಲಿ ಕೊಡುತ್ತಾನೆ.

ದೇವದ್ವಿಜಗುರುಪ್ರಾಜ್ಞಪೂಜನಂ ಶೌಚಮಾರ್ಜವಮ್ ।
ಬ್ರಹ್ಮಚರ್ಯಮಹಿಂಸಾ ಚ ಶಾರೀರಂ ತಪ ಉಚ್ಯತೇ ॥೧೪॥

ದೇವ ದ್ವಿಜ ಗುರು ಪ್ರಾಜ್ಞ ಪೂಜನಂ ಶೌಚಮ್ ಆರ್ಜವಮ್ ।
ಬ್ರಹ್ಮಚರ್ಯಮ್ ಅಹಿಂಸಾ ಚ ಶಾರೀರಂ ತಪಃ ಉಚ್ಯತೇ –ದೇವತೆಗಳನ್ನು, ಅರಿವಿನಿಂದ ಮರುಹುಟ್ಟು ಪಡೆದವರನ್ನು, ಗುರುಗಳನ್ನು ಮತ್ತು ತುಂಬಾ ತಿಳಿದವರನ್ನು ಗೌರವಿಸುವುದು, ನೈರ್ಮಲ್ಯ, ನೇರ ನಡೆ, ಬ್ರಹ್ಮಚರ್ಯ ಮತ್ತು ಇನ್ನೊಬ್ಬರಿಗೆ ಕಾಟ ನೀಡದಿರುವುದು ಶರೀರದ ತಪಸ್ಸು ಎನಿಸುತ್ತದೆ.

ದೇವರ ಪ್ರತೀಕ ಎಲ್ಲಿ ಕಂಡಿತೋ ಅಲ್ಲಿ ತಲೆಬಾಗುವುದು; ಜ್ಞಾನಿಗಳಿಗೆ ಗೌರವ ಕೊಡುವುದು; ಗುರುವಿಗೆ ತಲೆಬಾಗುವುದು; ಭಗವದ್ಭೂತಿಯಿಂದ ಭಗವಂತನನ್ನು ಅನುಭವಿಸಿದ ಅನುಭಾವಿಗಳಾದ ಪ್ರಾಜ್ಞರನ್ನು ಗೌರವಿಸುವುದು- ಇವೆಲ್ಲವೂ ಶರೀರ ತಪಸ್ಸು ಎನಿಸುತ್ತದೆ. ಇದರ ಜೊತೆಗೆ ಶುಚಿತ್ವವನ್ನು ಕಾಪಾಡಿಕೊಂಡು ಬದುಕುವುದು, ನೇರ ನಡೆ-ನುಡಿ, ಬ್ರಹ್ಮಚರ್ಯ ಪಾಲನೆ ಹಾಗೂ ಇನ್ನೊಬ್ಬರಿಗೆ ನಮ್ಮಿಂದ ತೊಂದರೆಯಾಗದಂತೆ ಬದುಕುವುದು ಶರೀರದ ತಪಸ್ಸು. [ಈ ಶ್ಲೋಕದಲ್ಲಿ ಹೇಳಿರುವ ಶೌಚಮ್, ಆರ್ಜವಮ್ ಮತ್ತು ಅಹಿಂಸಾ-ಈ ಗುಣಗಳ ಪೂರ್ಣ ವಿವರಣೆಯನ್ನು ಹದಿನಾರನೇ ಅಧ್ಯಾಯದ ಪ್ರಾರಂಭಿಕ ಶ್ಲೋಕದಲ್ಲಿ ವಿವರಿಸಲಾಗಿದೆ]. ಇಲ್ಲಿ 'ಬ್ರಹ್ಮಚರ್ಯ ಪಾಲನೆ' ಅಂದರೆ ಮನಸ್ಸನ್ನು ಭಗವಂತನಲ್ಲಿ ನೆಲೆಗೊಳಿಸುವುದು; ಅದಕ್ಕೆ

ಪೂರಕವಾಗಿ ವೇದಾಧ್ಯಯನ ಮಾಡುವುದು ಹಾಗೂ ಅಧ್ಯಯನಕ್ಕೆ ಪೂರಕವಾಗಿ ದೈಹಿಕ ಬ್ರಹ್ಮಚರ್ಯ ಪಾಲನೆ. ದೈಹಿಕವಾಗಿ ಪೂರ್ಣ ಬ್ರಹ್ಮಚರ್ಯ ಕೇವಲ ಸನ್ಯಾಸಿಗಳಿಗೆ ಮತ್ತು ಬ್ರಹ್ಮಚಾರಿಗಳಿಗೆ ಅನ್ವಯಿಸುತ್ತದೆ. ಗ್ರಹಸ್ಥರಾದವರು ಈ ರೀತಿ ಬದುಕಲು ಸಾಧ್ಯವಿಲ್ಲ. ಆದ್ದರಿಂದ ಗ್ರಹಸ್ಥರಲ್ಲಿ ಬ್ರಹ್ಮಚರ್ಯ ಪಾಲನೆ ಎಂದರೆ- ಅವರು ಸ್ವಚ್ಛಂದ ಕಾಮಿಗಳಾಗದೇ, ಗ್ರಹಸ್ಥಧರ್ಮ ಪಾಲನೆಯ ಆವರಣದಲ್ಲಿ ಬದುಕುವುದು ಎಂದರ್ಥ. ಹೀಗೆ ಭಗವಂತನಲ್ಲಿ ಶರಣಾಗತಿ; ಜ್ಞಾನಿಗಳಿಗೆ, ಗುರುಗಳಿಗೆ, ಪ್ರಾಜ್ಞರಿಗೆ ಗೌರವ ಕೊಡುವುದು, ಶುಚಿತ್ವವನ್ನು ಕಾಪಾಡಿಕೊಳ್ಳುವುದು, ನೇರ ನಡೆ ನುಡಿ, ಬ್ರಹ್ಮಚರ್ಯ ಪಾಲನೆ ಮತ್ತು ಅಹಿಂಸೆಯಿಂದ ಬದುಕುವುದು- ಶಾರೀರಿಕ ತಪಸ್ಸು . ನಾವು ಸಾಮಾಜಿಕವಾಗಿ ಸಭ್ಯರಾಗಿ ಬದುಕಲು ಈ ತಪಸ್ಸು ಬೇಕೇಬೇಕು. ಮನುಷ್ಯನಾದವನು ಅನುಸರಿಸಬೇಕಾದ ದೈಹಿಕ ನೀತಿಗಳಿವು

ಅನುದ್ವೇಗಕರಂ ವಾಕ್ಯಂ ಸತ್ಯಂ ಪ್ರಿಯಹಿತಂ ಚ ಯತ್ ।
ಸ್ವಾಧ್ಯಾಯಾಭ್ಯಸನಂ ಚೈವ ವಾಙ್ಮಯಂ ತಪ ಉಚ್ಯತೇ ॥೧೫॥

ಅನುದ್ವೇಗ ಕರಂ ವಾಕ್ಯಂ ಸತ್ಯಂ ಪ್ರಿಯ ಹಿತಂ ಚ ಯತ್ ।
ಸ್ವಾಧ್ಯಾಯ ಅಭ್ಯಸನಂ ಚ ಏವ ವಾಙ್ಮಯಂ ತಪಃ ಉಚ್ಯತೇ—ಕೆರಳಿಸದ, ದಿಟವಾದ, ಕೇಳುವುದಕ್ಕೆ ಮೆಚ್ಚಾದ ಹಾಗೂ ಬಾಳಿಗೆ ಒಳಿತಾದ ಮಾತು ಮತ್ತು ಶಾಸ್ತ್ರಗಳ ಓದು ಮಾತಿನ ತಪಸ್ಸು ಎನಿಸುತ್ತದೆ.

ಹಿಂದಿನ ಅಧ್ಯಾಯದಲ್ಲಿ ವಿಶ್ಲೇಶಿಸಿದಂತೆ ಇದ್ದದ್ದನ್ನು ಇದ್ದಂತೆ ಹೇಳುವುದೇ ಸತ್ಯವಲ್ಲ. ಸತ್ಯ ಅಂದರೆ ಏನು ಎನ್ನುವ ವಿವರಣೆಯನ್ನು ಕೃಷ್ಣ ಈ ಶ್ಲೋಕದ ಮೂಲಕ ನಮಗೆ ಕೊಟ್ಟಿದ್ದಾನೆ. ಎಲ್ಲಿ ನಿಜವಾದ ಸಜ್ಜನಿಕೆ ಇದೆ- ಅದನ್ನು ಮೆಚ್ಚಿಕೊಂಡು, ಅದಕ್ಕೆ ಪೂರಕವಾಗಿ, ಇನ್ನೊಬ್ಬರನ್ನು ನೋಯಿಸದೆ, ಅವರಿಗೆ ಹಿತವಾಗುವ ರೀತಿ ಮಾತನಾಡುವುದು ಮಾತಿನ ತಪಸ್ಸು. ಇನ್ನೊಬ್ಬರಿಗೆ ಪ್ರಿಯವೂ-ಹಿತವೂ ಆದ ಮಾತನ್ನು ಆಡುವುದು ಬಹಳ ಕಷ್ಟ. ಏಕೆಂದರೆ ಹೆಚ್ಚಿನ ಸಂದರ್ಭದಲ್ಲಿ ಪ್ರಿಯವಾದದ್ದು ಹಿತವಾಗಿರುವುದಿಲ್ಲ. ಇಂತಹ ಸಂದರ್ಭದಲ್ಲಿ ಮೌನ ಲೇಸು. ಕೃಷ್ಣನ ಕಥೆಯನ್ನು ಓದುವಾಗ ಅನೇಕ ಕಡೆ ನಮಗೆ ಕೃಷ್ಣ ಸುಳ್ಳು ಹೇಳಿದಂತೆ, ಮೋಸ ಮಾಡಿದಂತೆ ಕಾಣಿಸುತ್ತದೆ. ಆದರೆ ಆ ಕ್ರಿಯೆಯ ಹಿಂದೆ ಇರುವ ಕಾರುಣ್ಯ, ಹಿತಚಿಂತನೆಯನ್ನು ಗಮನಿಸಿದಾಗ ನಮಗೆ ಅದು ಸುಳ್ಳಲ್ಲ ಎನ್ನುವುದು ತಿಳಿಯುತ್ತದೆ. ದೈನಂದಿನ ಜೀವನದಲ್ಲಿ ನಾವು ಮಾತನಾಡುವಾಗ ನಮಗೆ ಕೃಷ್ಣ ಈ ಶ್ಲೋಕದಲ್ಲಿ ಹೇಳಿದ ಸಂದೇಶದ ಎಚ್ಚರವಿರಬೇಕು. ಮಾತನಾಡದೆ ಮೌನವಾಗಿದ್ದರೂ ಸರಿ-ಆದರೆ ಏನೋ ಮಾತನಾಡಿ ಆನಂತರ ಪಶ್ಚಾತ್ತಾಪಪಟ್ಟರೆ ಉಪಯೋಗವಿಲ್ಲ. "ಆಡಿದ ಮಾತನ್ನು ಹಿಂದೆ ಪಡೆಯಲು ಸಾಧ್ಯವಿಲ್ಲ; ಘಾಸಿಯಾದ ಮನಸ್ಸನ್ನು ವಾಸಿಮಾಡುವ ಮದ್ದು ನಮ್ಮಲ್ಲಿಲ್ಲ". ಆದ್ದರಿಂದ ಇನ್ನೊಬ್ಬರನ್ನು ನೋಯಿಸುವ ಮಾತನ್ನೆಂದೂ ಆಡಬೇಡ. ಹಾಳು ಹರಟೆಯಲ್ಲಿ ದಿನ ಕಳೆಯದೆ, ವೇದದ ಅರ್ಥಚಿಂತನೆ, ಗೀತಾಚಿಂತನೆ, ವಿಷ್ಣುಸಹಸ್ರನಾಮ ಪಠಣ, ಇತ್ಯಾದಿ ಸ್ವಾಧ್ಯಾಯದಲ್ಲಿ ನಿರತನಾಗುವುದು ಮಾತಿನ ತಪಸ್ಸು.

ಮನಃ ಪ್ರಸಾದಃ ಸೌಮ್ಯತ್ವಂ ಮೌನಮಾತ್ಮವಿನಿಗ್ರಹಃ ।
ಭಾವಸಂಶುದ್ಧಿರಿತ್ಯೇತತ್ ತಪೋ ಮಾನಸಮುಚ್ಯತೇ ॥೧೬॥

ಮನಃ ಪ್ರಸಾದಃ ಸೌಮ್ಯತ್ವಂ ಮೌನಮ್ ಆತ್ಮವಿನಿಗ್ರಹಃ ।
ಭಾವಸಂಶುದ್ಧಿಃ ಇತಿ ಏತತ್ ತಪಃ ಮಾನಸಮ್ ಉಚ್ಯತೇ -- ಬಗೆಯ ತಿಳಿ, ಮಿದುತನ, ಮನನ, ತನ್ನ ಮೇಲೆ ಹಿಡಿತ ಮತ್ತು ಒಳ್ಳೆಯದನ್ನೇ ಬಗೆಯುವುದು-ಇದು ಮನದ ತಪಸ್ಸು ಎನಿಸುತ್ತದೆ.

ಮೇಲೆ ಹೇಳಿದ ಎರಡು ವಿಧದ ತಪಸ್ಸಿಗೆ ಮಿಗಿಲಾಗಿರುವ ಮಹಾ ತಪಸ್ಸು ಎಂದರೆ ಮನದ ತಪಸ್ಸು. ಶರೀರ ಮತ್ತು ಮಾತಿನ ತಪಸ್ಸು ಮನದ ತಪಸ್ಸಿಗೆ ಪೂರಕ. ನಮ್ಮ ಮನಸ್ಸು ಯಾವಾಗಲೂ ಪ್ರಸನ್ನವಾಗಿರಬೇಕು. ಅದರಲ್ಲಿ ಕೆಟ್ಟ ವಿಚಾರ ತುಂಬಿ ಕಲುಷಿತವಾಗಿರಬಾರದು. ಅದು ಸೌಮ್ಯವಾಗಿರಬೇಕು, ಅಲ್ಲಿ ಕ್ರೌರ್ಯವಿರಬಾರದು. ಯಾವುದೇ ಒಂದು ವಿಷಯದ ಮೇಲೆ ತೀರ್ಮಾನಕ್ಕೆ ಬರುವ ಮೊದಲು ಆಳವಾದ ಚಿಂತನೆ ಮಾಡಬೇಕು. ಒಂದು ವಿಷಯದ ಮೇಲೆ, ಒಬ್ಬ ವ್ಯಕ್ತಿಯ ಮೇಲೆ ದುಡುಕಿ ಪ್ರತಿಕ್ರಿಯಿಸಬಾರದು. ಮನನ ಮಾಡು, ಮನನ ಮಾಡಿ ಮಾತನಾಡು. ಈ ರೀತಿ ಮನನ ಮಾಡಬೇಕಾದರೆ ನಾವು ಆತ್ಮವಿನಿಗ್ರಹವನ್ನು ಸಾಧಿಸಬೇಕು( ಹೆಚ್ಚಿನ ವಿವರಕ್ಕಾಗಿ ಅ-೧೩, ಶ್ಲೋ-೭-ನೋಡಿ). ಸ್ವಚ್ಛವಾದ ಕ್ರೌರ್ಯವಿಲ್ಲದ ಮನಸ್ಸಿಗೆ ಇಂದ್ರಿಯಗಳ ಹಿಡಿತವಿರುತ್ತದೆ. ಅಂತಹ ಮನಸ್ಸಿಗೆ ಕೆಟ್ಟ ಭಾವನೆ ಹೊಳೆಯುವುದಿಲ್ಲ. ಒಬ್ಬರು ನಮ್ಮ ಬಗ್ಗೆ ಕೆಟ್ಟದ್ದಾಗಿ ಮಾತನಾಡಿದರೂ ಕೂಡಾ ನಮಗೆ ಅವರ ಮೇಲೆ ದ್ವೇಷ, ಕೋಪ ಬರುವುದಿಲ್ಲ. ಈ ರೀತಿ ಮನಸ್ಸಿನ ನಿಯಂತ್ರಣ ಮಾಡುವುದೇ ಮನಸ್ಸಿನ ತಪಸ್ಸು.

ಇಲ್ಲಿ ಹೇಳಿದ ಮೂರು ವಿಧದ ತಪಸ್ಸಿನಲ್ಲಿ ಮತ್ತೆ ಪ್ರತಿಯೊಂದರಲ್ಲೂ ಮೂರು ವಿಧ. ಸಾತ್ವಿಕ, ರಾಜಸ ಮತ್ತು ತಾಮಸ. ಇದರ ವಿವರಣೆ ಮುಂದಿನ ಮೂರು ಶ್ಲೋಕದಲ್ಲಿದೆ.

ಶ್ರದ್ಧಯಾ ಪರಯಾ ತಪ್ತಂ ತಪಸ್ತತ್ ತ್ರಿವಿಧಂ ನರೈಃ ।
ಅಫಲಾಕಾಂಕ್ಷಿಭಿರ್ಯುಕ್ತೈಃ ಸಾತ್ವಿಕಂ ಪರಿಚಕ್ಷತೇ ॥೧೭॥

ಶ್ರದ್ಧಯಾ ಪರಯಾ ತಪ್ತಂ ತಪಃ ತತ್ ತ್ರಿವಿಧಂ ನರೈಃ ।
ಅಫಲ ಆಕಾಂಕ್ಷಿಭಿಃ ಯುಕ್ತೈಃ ಸಾತ್ವಿಕಂ ಪರಿಚಕ್ಷತೇ –ಈ ಮೂರೂ ಬಗೆಯ ತಪಸ್ಸನ್ನು ತುಂಬು ನಂಬಿಕೆಯಿಂದ, ಫಲದ ಬಯಕೆಯಿಲ್ಲದೆ, ಭಗವದರ್ಪಣಭಾವದಿಂದ ಆಚರಿಸಿದಾಗ ಅದನ್ನು ಸಾತ್ವಿಕ ತಪಸ್ಸು ಎನ್ನುತ್ತಾರೆ.

ತಪಸ್ಸಿನ ಹಿಂದೆ ಶ್ರೇಷ್ಠವಾದ ಶ್ರದ್ಧೆ-ಪ್ರಾಮಾಣಿಕತೆ ಇದ್ದರೆ ಅದು ಸಾತ್ವಿಕ ತಪಸ್ಸಾಗುತ್ತದೆ. ಭಗವಂತನ ಪಾರಮ್ಯದ ಎಚ್ಚರದಿಂದ, ಭಗವಂತ ಪ್ರೀತನಾಗಲಿ ಎನ್ನುವ ಅನುಸಂಧಾನದಿಂದ ಮಾಡುವ ಪ್ರತಿಯೊಂದು ಕ್ರಿಯೆ-ಸಾತ್ವಿಕ ಕ್ರಿಯೆ ಎನಿಸುತ್ತದೆ. ಉದಾಹರಣೆಗೆ ಗುರುವಿಗೆ ನಮಸ್ಕರಿಸುವಾಗ ಆ ಗುರುವಿನ ಅಂತರ್ಗತನಾಗಿರುವ ಭಗವಂತನಿಗೆ ನಮಸ್ಕರಿಸುತ್ತಿದ್ದೇನೆ ಎನ್ನುವ ಅನುಸಂಧಾನ. ಹೀಗೆ ನಮ್ಮ ಪ್ರತಿಯೊಂದು

ಕ್ರಿಯೆಯ ಹಿಂದೆ ಭಗವದರ್ಪಣ ಬುದ್ಧಿ ಇರಬೇಕು. ಮಂತ್ರಗಳು ಹೇಳುವುದೂ ಇದನ್ನೇ . "ಅನೇನ ಭಗವಾನ್ ಗೋಪಾಲಕೃಷ್ಣ ಪ್ರಿಯತಃ-ಶ್ರೀ ಕೃಷ್ಣಾರ್ಪಣ ಮಸ್ತು" ಎಂದು ಹೇಳುವಾಗ ನಮ್ಮಲ್ಲಿ ಕೂಡಾ ಪೂರ್ಣ ಅರ್ಪಣಾ ಭಾವ ತುಂಬಿರಬೇಕು. ಇಂತಹ ತಪಸ್ಸು ಸಾತ್ವಿಕ ತಪಸ್ಸೆನಿಸುತ್ತದೆ.

ಸತ್ ಕಾರಮಾನಪೂಜಾರ್ಥಂ ತಪೋ ಡಂಭೇನ ಚೈವ ಯತ್ ।
ಕ್ರಿಯತೇ ತದಿಹ ಪ್ರೋಕ್ತಂ ರಾಜಸಂ ಚಲಮಧ್ರುವಮ್ ॥೧೮॥

ಸತ್ ಕಾರ ಮಾನ ಪೂಜಾ ಅರ್ಥಂ ತಪಃ ಡಂಭೇನ ಚ ಏವ ಯತ್ ।
ಕ್ರಿಯತೇ ತತ್ ಇಹ ಪ್ರೋಕ್ತಮ್ ರಾಜಸಂ ಚಲಮ್ ಅಧ್ರುವಮ್ – ಮನ್ನಣೆ, ಹೊಗಳಿಕೆ ಮತ್ತು ಗೌರವಗಳಿಗಾಗಿ ಬೂಟಾಟಿಕೆಯಿಂದ ಆಚರಿಸುವ, ನೆಲೆ ಇಲ್ಲದ, ಬಾಳಿಕೆಯಿಲ್ಲದ ತಪಸ್ಸು ರಾಜಸ ಎನ್ನಿಸುತ್ತದೆ.

ಭಗವಂತನ ಅನುಸಂಧಾನವಿಲ್ಲದೆ, ತನಗೆ ಜನ ಸತ್ಕಾರ ಮಾಡಲಿ ಎಂದು ಸನ್ಮಾನದ ಆಸೆಯಿಂದ ಮಾಡುವ ಎಲ್ಲಾ ತಪಸ್ಸು ರಾಜಸ ತಪಸ್ಸು. ಈ ರೀತಿ ಡಂಭಾಚಾರದಿಂದ ಮಾಡುವ ತಪಸ್ಸು ಪರಲೋಕಕ್ಕೆ ಸಲ್ಲುವುದಿಲ್ಲ. ಚಪಲದಿಂದ ಮಾಡಿದ ಇಂತಹ ಕಾರ್ಯದ ಫಲ ಇಹದಲ್ಲೂ ಶಾಶ್ವತವಲ್ಲ.

ಈ ಶ್ಲೋಕದಲ್ಲಿ ಏವ ಮತ್ತು ಚ-ಕಾರ ಒಟ್ಟಿಗೆ ಬಂದಿದೆ. ಇದು ನಮಗೆ ವಿಶೇಷ ಸಂದೇಶವನ್ನು ಕೊಡುತ್ತದೆ. ಸತ್ಕಾರಕ್ಕಾಗಿಯೂ, ಮಾನಕ್ಕಾಗಿಯೂ, ಡಂಭಕ್ಕಾಗಿಯೂ ಮಾಡುವ ಕ್ರಿಯೆ ರಾಜಸ ಎನಿಸಿದರೆ ; ಭಗವದರ್ಪಣ ಬುದ್ಧಿಯಿಂದ ಮಾಡಿ ಬಯಸದೇ ಸತ್ಕಾರ ಬಂದರೆ, ನಾಲ್ಕು ಜನರಿಗೆ ತಿಳುವಳಿಕೆ ಬರಲಿ ಎಂದು ಜ್ಞಾನ ದಾನದ ಭಾವನೆಯಿಂದ ಪ್ರಚಾರ ಮಾಡಿದರೆ-ಅದು ರಾಜಸವಾಗುವುದಿಲ್ಲ. ಇದನ್ನು ತಿಳಿಸುವುದಕ್ಕೋಸ್ಕರ ಇಲ್ಲಿ ಚ ಮತ್ತು ಎವಕಾರ ಬಳಸಲಾಗಿದೆ.

ಮೂಢಗ್ರಾಹೇಣಾತ್ಮನೋ ಯತ್ ಪೀಡಯಾ ಕ್ರಿಯತೇ ತಪಃ ।
ಪರಸ್ಯೋತ್ಸಾದನಾರ್ಥಂ ವಾ ತತ್ ತಾಮಸಮುದಾಹೃತಮ್ ॥೧೯॥

ಮೂಢ ಗ್ರಾಹೇಣ ಆತ್ಮನಃ ಯತ್ ಪೀಡಯಾ ಕ್ರಿಯತೇ ತಪಃ ।
ಪರಸ್ಯ ಉತ್ಸಾದನ ಅರ್ಥಂ ವಾ ತತ್ ತಾಮಸಮ್ ಉದಾಹೃತಮ್ –ದುರಾಗ್ರಹದಿಂದ ತನ್ನ ದೇಹವನ್ನೇ ದಂಡಿಸುವ ಮೂಲಕ, ಅಥವಾ ಆಗದವರನ್ನು ಮುಗಿಸುವುದಕ್ಕಾಗಿ ಮಾಡುವ ತಪಸ್ಸು ತಾಮಸ ತಪಸ್ಸು ಎನ್ನಿಸುತ್ತದೆ.

ತಪ್ಪು ತಿಳುವಳಿಕೆಯಿಂದ, ಭ್ರಮೆಯಿಂದ, ಪರಮಾತ್ಮನ ಅನುಸಂಧಾನವಿಲ್ಲದೆ, ಇನ್ನೊಬ್ಬರು ಹಾಳಾಗಬೇಕು ಎನ್ನುವ ಕೆಟ್ಟ ಭಾವನೆಯಿಂದ, ತನ್ನ ದೇಹದೊಳಗಿರುವ ಭಗವಂತನ ಎಚ್ಚರವಿಲ್ಲದೆ, ದೇಹ ದಂಡನೆ ಮಾಡಿಕೊಂಡು ಮಾಡುವ ತಪಸ್ಸು ತಾಮಸ ತಪಸ್ಸು.

ದಾತವ್ಯಮಿತಿ ಯದ್ ದಾನಂ ದೀಯತೇಽನುಪಕಾರಿಣೇ ।
ದೇಶೇ ಕಾಲೇ ಚ ಪಾತ್ರೇ ಚ ತದ್ ದಾನಂ ಸಾತ್ವಿಕಂ ಸ್ಮೃತಮ್॥೨೦॥

ದಾತವ್ಯಮ್ ಇತಿ ಯತ್ ದಾನಮ್ ದೀಯತೇ ಅನುಪಕಾರಿಣೇ ।
ದೇಶೇ ಕಾಲೇ ಚ ಪಾತ್ರೇ ಚ ತತ್ ದಾನಮ್ ಸಾತ್ವಿಕಂ ಸ್ಮೃತಮ್ -ಪ್ರತ್ಯುಪಕಾರಕ್ಕಾಗಿ ಅಲ್ಲದೆ ಕರ್ತವ್ಯ ದೃಷ್ಟಿಯಿಂದ ಕೊಡುವ ದಾನ, ತಕ್ಕ ದೇಶ-ಕಾಲಗಳಲ್ಲಿ ತಕ್ಕ ವ್ಯಕ್ತಿಗೆ ಕೊಡುವ ದಾನ ಸಾತ್ವಿಕ ಎನಿಸುತ್ತದೆ.

ಯಾವುದೇ ಪ್ರತ್ಯುಪಕಾರದ ನಿರೀಕ್ಷೆ ಇಲ್ಲದೆ, ಆತ್ಮ ಸಂತೋಷದಿಂದ, ಮನಃಪೂರ್ವಕವಾಗಿ, ಪ್ರೀತಿಯಿಂದ, ಯೋಗ್ಯವಾದ ವ್ಯಕ್ತಿಗೆ, ಯೋಗ್ಯವಾದ ಕಾಲದಲ್ಲಿ, ಯೋಗ್ಯವಾದ ಸ್ಥಳದಲ್ಲಿ ಕೊಡುವುದು; ನನ್ನ ಕರ್ತವ್ಯ ಅನ್ನುವ ದೃಷ್ಟಿಯಿಂದ ಕೊಡುವ ದಾನ ಸಾತ್ವಿಕ ದಾನ.[ಹೆಚ್ಚಿನ ವಿವರಣೆ : ಅಧ್ಯಾಯ ಹದಿನಾರು ಆರಂಭಿಕ ಶ್ಲೋಕ].

ಯತ್ ತು ಪ್ರತ್ಯುಪಕಾರಾರ್ಥಂ ಫಲಮುದ್ದಿಶ್ಯ ವಾ ಪುನಃ ।
ದೀಯತೇ ಚ ಪರಿಕ್ಲಿಷ್ಟಂ ತದ್ ರಾಜಸಮುದಾಹೃತಮ್ ॥೨೧॥

ಯತ್ ತು ಪ್ರತ್ಯುಪಕಾರಾರ್ಥಂ ಫಲಮ್ ಉದ್ದಿಶ್ಯ ವಾ ಪುನಃ ।
ದೀಯತೇ ಚ ಪರಿಕ್ಲಿಷ್ಟಂ ತತ್ ರಾಜಸಮ್ ಉದಾಹೃತಮ್ -ಪ್ರತ್ಯುಪಕಾರಕ್ಕಾಗಿ ಅಥವಾ ಫಲದ ಆಸೆಯಿಂದ, ಕೊಡಬೇಕಲ್ಲಾ ಎಂದು ಕೊಡುವ ದಾನ ರಾಜಸ ಎನಿಸುತ್ತದೆ.

ಇನ್ನೊಬ್ಬರು ನಮಗೆ ಮುಂದೆ ಉಪಕಾರ ಮಾಡಲಿ ಎಂದು ಅಥವಾ ಹಿಂದೆ ಮಾಡಿದ ಉಪಕಾರಕ್ಕೆ ಪ್ರತಿಯಾಗಿ, ಕೊಡಬೇಕಲ್ಲಾ ಎಂದು ಕೊಡುವುದು. ಕೊಡುವಾಗ ಫಲದ ಬಯಕೆಯಿಂದ ಕೊಡುವುದು ರಾಜಸ ದಾನ.

ಅದೇಶಕಾಲೇ ಯದ್ ದಾನಮಪಾತ್ರೇಭ್ಯಶ್ಚ ದೀಯತೇ ।
ಅಸತ್ ಕೃತಮವಜ್ಞಾತಂ ತತ್ ತಾಮಸಮುದಾಹೃತಮ್ ॥೨೨॥

ಅದೇಶ ಕಾಲೇ ಯತ್ ದಾನಮ್ ಅಪಾತ್ರೇಭ್ಯಃ ಚ ದೀಯತೇ ।
ಅಸತ್ ಕೃತಮ್ ಅವಜ್ಞಾತಮ್ ತತ್ ತಾಮಸಮ್ ಉದಾಹೃತಮ್ - ತಕ್ಕುದಲ್ಲದ ದೇಶ-ಕಾಲದಲ್ಲಿ, ಅನರ್ಹವ್ಯಕ್ತಿಗಳಿಗೆ ಆದರಿಸದೇ ಹೀಗಳೆದು ನೀಡುವ ದಾನ ತಾಮಸ ಎನಿಸುತ್ತದೆ.

ನಮಗೆ ಬೇಡವಾದದ್ದನ್ನು ಇನ್ನೊಬ್ಬರಿಗೆ ಸಾಗಹಾಕುವುದಕ್ಕೋಸ್ಕರ ಕೊಡುವುದು; ಯೋಗ್ಯರಲ್ಲದವರಿಗೆ ಬೈದು, ಹೀಯಾಳಿಸಿ, ಅವಮಾನ ಮಾಡಿ ಕೊಡುವುದು-ತಾಮಸ ದಾನ.

ಈವರೆಗೆ ಕೃಷ್ಣ ಹೇಳಿದ ಸಾತ್ವಿಕ ಕರ್ಮದ ಮಹತ್ವವನ್ನು ಹೇಳುವ 'ಅರ್ಥವಾದ' ಈ ಅಧ್ಯಾಯದ ಮುಂದಿನ ಭಾಗ. 'ಅರ್ಥವಾದ' ಎಂದರೆ ಸಾತ್ವಿಕ ಕರ್ಮದ ಮಹತ್ವಿಕೆಯನ್ನು ಹೇಳುವ ನಿರೂಪಣೆ.

ಓಂ ತತ್ ಸದಿತಿ ನಿರ್ದೇಶೋ ಬ್ರಹ್ಮಣಸ್ತ್ರಿವಿಧಃ ಸ್ಮೃತಃ ।
ಬ್ರಾಹ್ಮಣಾಸ್ತೇನ ವೇದಾಶ್ಚ ಯಜ್ಞಾಶ್ಚ ವಿಹಿತಾಃ ಪುರಾ ॥೨೩॥

ಓಂ ತತ್ ಸತ್ ಇತಿ ನಿರ್ದೇಶಃ ಬ್ರಹ್ಮಣಃ ತ್ರಿವಿಧಃ ಸ್ಮೃತಃ ।
ಬ್ರಾಹ್ಮಣಾಃ ತೇನ ವೇದಾಃ ಚ ಯಜ್ಞಾಃ ಚ ವಿಹಿತಾಃ ಪುರಾ – ಓಂ [ಪ್ರಪಂಚವನ್ನು ಹೊತ್ತವನು ಮತ್ತು ಪ್ರಪಂಚದಲ್ಲಿ ತುಂಬಿರುವವನು], ತತ್ [ವೇದಗಳ ಮೂಲಕ, ಪರೋಕ್ಷವಾಗಿ ಮಾತ್ರ ತಿಳಿಯಲು ಸಾಧ್ಯವಾದವನು] ಸತ್ [ಎಲ್ಲಾ ಶುಭ ಗುಣಗಳಿಂದ ಪೂರ್ಣನಾದವನು] – ಇವು ಭಗವಂತನ ಮೂರು ಹೆಸರುಗಳು. ಆ ಭಗವಂತನೇ ವೇದಗಳನ್ನೂ, ವೇದಜ್ಞರನ್ನೂ ಮತ್ತು ಯಜ್ಞಗಳನ್ನೂ ಅಣಿಗೊಳಿಸಿದನು.

ಓಂ, ತತ್, ಸತ್ ಇವು ಮೂರು ಭಗವಂತನ ಹೆಸರುಗಳು. ಭಗವಂತನ ಸ್ಮರಣೆಗಾಗಿ, ಭಗವಂತನನ್ನು ಕರೆಯುವುದಕ್ಕಾಗಿ ಜ್ಞಾನಿಗಳು ಈ ರೀತಿ ಅನುಸಂಧಾನವನ್ನು ಬಳಕೆಗೆ ತಂದರು. ಭಗವಂತನ ಹೆಸರು ನಮ್ಮ ಹೆಸರಂತಲ್ಲ. ಆತನ ಹೆಸರು ಆತನ ಗುಣವಾಚಕ ಪದಗಳು. 'ಓಂ' ಭಗವಂತನಿಗೆ ಮೀಸಲಾದ( Exclusive) ಹೆಸರು. ಇದು ಮನುಷ್ಯನ ಒಟ್ಟು ಜೀವನದ ಎಲ್ಲಾ ಮುಖವನ್ನು ಮೂರು ಅಕ್ಷರಗಳಲ್ಲಿ(ಅ, ಉ, ಮ್) ಹೇಳುತ್ತದೆ. ಇಡೀ ಜಗತ್ತು ಯಾರಲ್ಲಿ ಓತವಾಗಿದೆಯೋ, ಇಡೀ ಜಗತ್ತು ಯಾರಲ್ಲಿ ಹೆಣೆದುಕೊಂಡಿದೆಯೋ –ಅವನು 'ಓಂ'. ನಾವು ಮಾಡುವ ಸಮಸ್ತ ಕರ್ಮವೂ ಅವನಲ್ಲಿ ಅರ್ಪಿತವಾಗಿದೆ ಎಂದು ಹೇಳುವುದಕ್ಕಾಗಿ ಓಂಕಾರವನ್ನು ಬಳಸುತ್ತಾರೆ. 'ಹರಿಃ ಓಂ' ಎಂದು ಪ್ರಾರಂಭದಲ್ಲಿ ಹೇಳಿದರೆ - "ನಾನು ಮುಂದೆ ಮಾಡತಕ್ಕ ಸಮಸ್ತವೂ ಭಗವಂತನಿಗೆ ಅರ್ಪಿತವಾಗಿದೆ" ಎಂದು ಹೇಳಿದಂತೆ. [ಓಂಕಾರದ ಬಗ್ಗೆ ಹೆಚ್ಚಿನ ವಿವರಣೆಗಾಗಿ ಅಧ್ಯಾಯ-೭ ಶ್ಲೋಕ ೮-೯ ನೋಡಿ).

'ತತಃ' ಅಂದರೆ ತುಂಬಿರುವವನು. ಭಗವಂತ ಸಮಸ್ತ ಗುಣಗಳ ನೆಲೆ. ಗುಣಪರಿಪೂರ್ಣನಾದ ಅವನು ಸಮಸ್ತ ವೇದದಲ್ಲಿ ತುಂಬಿದ್ದಾನೆ. ಆದ್ದರಿಂದ ಆತ 'ತತ್'. ಇನ್ನು 'ಸತ್ ' ಎಂದರೆ ಯಾವ ದೋಷವೂ ಇಲ್ಲದವ. ಹೀಗೆ ಓಂ-ತತ್-ಸತ್ ಎನ್ನುವುದು ವೇದಕಾಲದ ನಾಮತ್ರಯಗಳು. ಇಂದು ನಾವು ಹೇಳುವ ಅಚ್ಯುತಾಯನಮಃ, ಅನಂತಾಯನಮಃ, ಗೋವಿಂದಾಯ ನಮಃ ಕೂಡಾ ಇದೇ ಅರ್ಥವನ್ನು ಕೊಡುತ್ತದೆ. ಅ-ಚ್ಯುತ ಅಂದರೆ ಯಾವ ಗುಣದಿಂದಲೂ ಚ್ಯುತನಾದವನಲ್ಲ ಎಂದರ್ಥ. ಅವನಿಂದ ಚ್ಯುತನಾಗಿ ಈ ಜಗತ್ತಿಗೆ ಅಸ್ತಿತ್ವವಿಲ್ಲ. ಆತ ಸರ್ವ ಜಗತ್ತಿಗೆ ಆಧಾರ. ಇನ್ನು ಎರಡನೇ ನಾಮ –ಅನಂತ. ಅಂತವಿಲ್ಲದ್ದು ಅನಂತ. ಯಾರ ಗುಣಗಳಿಗೆ ಕೊನೆ ಇಲ್ಲವೋ ಅವನು ಅನಂತ. ಮೂರನೆಯ ನಾಮ ಗೋವಿಂದ. ಗೋ-ಅಂದರೆ ವೇದಗಳು. ಸಮಸ್ತ ವೇದಗಳಿಂದ ಪ್ರತಿಪಾದ್ಯನಾದ ಭಗವಂತ-ಗೋವಿಂದ. ಒಟ್ಟಿನಲ್ಲಿ ಸಂಕ್ಷಿಪ್ತವಾಗಿ ಇಲ್ಲಿ - ಓಂ ತತ್ ಸತ್ ಎಂದರೆ "ಜಗದಾಧಾರನೂ, ಸಮಸ್ತ ಗುಣಪೂರ್ಣನೂ, ಸಮಸ್ತ ವೇದ ಪ್ರತಿಪಾದ್ಯನೂ, ಸಮಸ್ತ ದೋಷ ದೂರನೂ ಆದ

ಭಗವಂತ" ಎಂದರ್ಥ. ಇಂತಹ ಭಗವಂತ ವೇದವನ್ನು ಸೃಷ್ಟಿ ಮಾಡಿದ, ಅದರಿಂದ 'ಜ್ಞಾನಿಗಳಾಗಿ' ಎಂದು ವೇದಜ್ಞ(ಜ್ಞಾನಿ)ರನ್ನು ಸೃಷ್ಟಿ ಮಾಡಿದ, ಜ್ಞಾನ ಪೂರ್ವಕವಾಗಿ ಕರ್ಮ ಮಾಡಿರೆಂದು ಯಜ್ಞವನ್ನು ಸೃಷ್ಟಿ ಮಾಡಿದ.

ನಮ್ಮಲ್ಲಿ ಕೆಲವರು ವೇದ-'ಪೌರುಷೇಯ' ಎಂದೂ, ಹಾಗೂ ಇನ್ನು ಕೆಲವರು ವೇದ-'ಅಪೌರುಷೇಯ' ಎಂದೂ ವಾದ ಮಾಡುವವರಿದ್ದಾರೆ. ಸೃಷ್ಟಿ ಪೂರ್ವದಲ್ಲಿ ಪರಮಪುರುಷನಿಂದ ಉಚ್ಚರಿಸಲ್ಪಟ್ಟ ವೇದ ಪೌರುಷೇಯ; ಇದು ಅನಾದಿ-ಅನಂತ ಕಾಲದಲ್ಲಿ ಪ್ರತೀ ಕಲ್ಪದಲ್ಲೂ ಭಗವಂತನಿಂದ ಉಚ್ಚರಿಸಲ್ಪಡುವುದರಿಂದ ಅಪೌರುಷೇಯ ಕೂಡಾ ಹೌದು. ಆದ್ದರಿಂದ ಈ ಕುರಿತು ಮಾಡುವ ವಾದ ವ್ಯರ್ಥ.

ತಸ್ಮಾದೋಮಿತ್ಯುದಾಹೃತ್ಯ ಯಜ್ಞದಾನತಪಃಕ್ರಿಯಾಃ ।
ಪ್ರವರ್ತಂತೇ ವಿಧಾನೋಕ್ತಾಃ ಸತತಂ ಬ್ರಹ್ಮವಾದಿನಾಮ್ ॥೨೪॥

ತಸ್ಮಾತ್ ಓಂ ಇತಿ ಉದಾಹೃತ್ಯ ಯಜ್ಞ ದಾನ ತಪಃ ಕ್ರಿಯಾಃ ।
ಪ್ರವರ್ತಂತೇ ವಿಧಾನ ಉಕ್ತಾಃ ಸತತಮ್ ಬ್ರಹ್ಮವಾದಿನಾಮ್ – ಆದ್ದರಿಂದ ಶಾಸ್ತ್ರದ ಕಟ್ಟಳೆಗೆ ಅನುಗುಣವಾದ, ಬ್ರಹ್ಮ ಚಿಂತಕರ ಯಜ್ಞ, ದಾನ ಮತ್ತು ತಪದ ಕ್ರಿಯೆಗಳು ಯಾವಾಗಲೂ 'ಓಂ' ಎಂದು ಭಗವಂತನ ನಾಮ ಸ್ಮರಣೆಯ ಜತೆಗೆಯೇ ತೊಡಗುತ್ತವೆ.

ಕರ್ಮದಲ್ಲಿ ಓಂಕಾರ ಬಳಕೆಯ ಮಹತ್ವವನ್ನು ಕೃಷ್ಣ ಇಲ್ಲಿ ವಿವರಿಸಿದ್ದಾನೆ. ನಮಗೆ ತಿಳಿದಂತೆ ಒಬ್ಬ ವೇದಜ್ಞನಾಗಬೇಕಾದರೆ ಆತನಿಗೆ ಓಂಕಾರದ ಉಪದೇಶವಾಗಿರಬೇಕು; ಯಜ್ಞದ ಆದಿ-ಅಂತದಲ್ಲಿ ಓಂಕಾರ ಹೇಳಬೇಕು; ವೇದ ಪಠಣದ ಆದಿ-ಅಂತದಲ್ಲಿ ಓಂಕಾರವಿರಬೇಕು. ಇದೆಲ್ಲವೂ ಹಿಂದಿನಿಂದಲೂ ಬಂದಿರುವ ಆಚರಣೆಗಳು. ನಾವು ಮಾಡುವ ಯಾವ ಕಾರ್ಯವೇ ಇರಲಿ, ಅದನ್ನು ಪ್ರಾರಂಭಿಸುವಾಗ "ಇದನ್ನು ಭಗವಂತನ ಪೂಜಾರೂಪವಾಗಿ ಮಾಡುತ್ತೇನೆ" ಎನ್ನುವ ಸಂಕಲ್ಪ ಮಾಡಿ ಮಾಡುವುದು ಮತ್ತು ಅಂತ್ಯದಲ್ಲಿ "ನಾನು ಮಾಡಿದ್ದನ್ನು ಭಗವಂತ ಸ್ವೀಕರಿಸಲಿ" ಎಂದು ಹೇಳುವುದು-ಇದರ ಮೂಲ ಉದ್ದೇಶ. ಹೀಗೆ ಓಂಕಾರ ಹೇಳಿಯೇ ಕರ್ಮ ಮಾಡಬೇಕು ಎನ್ನುವ ಆಚರಣೆ ಹಿಂದಿನಿಂದ ಬೆಳೆದುಬಂತು. ಈ ಅನುಸಂಧಾನದಿಂದ ನಾವು ಯಾವುದೇ ಪಾರಾಯಣ, ಹೋಮ, ಹವನ, ಯಜ್ಞ, ತಪಸ್ಸು, ದಾನ ಮಾಡಿದರೂ ಕೂಡಾ ಅದು ಸಾತ್ವಿಕ ಕರ್ಮವೆನಿಸುತ್ತದೆ.

ತದಿತ್ಯನಭಿಸಂಧಾಯ ಫಲಂ ಯಜ್ಞತಪಃಕ್ರಿಯಾಃ ।
ದಾನಕ್ರಿಯಾಶ್ಚ ವಿವಿಧಾಃ ಕ್ರಿಯಂತೇ ಮೋಕ್ಷಕಾಂಕ್ಷಿಭಿಃ ॥೨೫॥

ತತ್ ಇತಿ ಅನಭಿಸಂಧಾಯ ಫಲಂ ಯಜ್ಞ ತಪಃ ಕ್ರಿಯಾಃ ।
ದಾನ ಕ್ರಿಯಾಃ ಚ ವಿವಿಧಾಃ ಕ್ರಿಯಂತೇ ಮೋಕ್ಷಕಾಂಕ್ಷಿಭಿಃ – ಮೋಕ್ಷ ಬಯಸುವ ಸಜ್ಜನರು ಫಲವನ್ನು ಬಯಸದೆ, 'ತತ್' ಎನಿಸಿದ ಭಗವಂತನಿಗಾಗಿ ಬಗೆಬಗೆಯ ಯಜ್ಞ, ದಾನ ಮತ್ತು ತಪದ ಕ್ರಿಯೆಗಳನ್ನು ಆಚರಿಸುತ್ತಾರೆ.

'ತತ್' ಎನ್ನುವುದು ಸಮಸ್ತ ವೇದ ವಾಚ್ಯನಾದ ಭಗವಂತನನ್ನು ಹೇಳುತ್ತದೆ ಎನ್ನುವುದನ್ನು ಹಿಂದೆ ನೋಡಿದ್ದೇವೆ. ಇಲ್ಲಿ-ನಾವು ಮಾಡುವ ಕರ್ಮದಲ್ಲಿ 'ತತ್' ಏನನ್ನು ಹೇಳುತ್ತದೆ ಎನ್ನುವುದನ್ನು ಕೃಷ್ಣ ವಿವರಿಸಿದ್ದಾನೆ. 'ತತ್' ಎನ್ನುವುದು ವೇದಮಾತಾ ಗಾಯತ್ರಿಯ ಸಂಕ್ಷಿಪ್ತಪದ(**Abbreviation;** ಮೊದಲ ಮತ್ತು ಕೊನೆಯ ಅಕ್ಷರ) ಹೀಗಾಗಿ ಇದು ಗಾಯತ್ರಿ ವಾಚ್ಯ ಭಗವಂತನ ಮುಖ್ಯ ನಾಮಧೇಯ. 'ತತ್' ಎನ್ನುವುದು ಕರ್ಮದಲ್ಲಿ ಭಗವಂತನು ಕೊಡುವ ಫಲವನ್ನು ಹೇಳುತ್ತದೆ. 'ತತ್' ಎಂದರೆ ಯಾವುದೇ ಐಹಿಕ ಫಲದ ಆಸೆ ಇಲ್ಲದೆ, ಭವಬಂಧನದಿಂದ ಬಿಡುಗಡೆಗೊಳಿಸಿ ಮೋಕ್ಷವನ್ನು ಕೊಡುವ ಭಗವಂತನ ಪ್ರೀತಿಗಾಗಿ ಮಾಡುವ ಕರ್ಮ. ಅದು ಯಜ್ಞವಿರಬಹುದು, ತಪಸ್ಸಿರಬಹುದು ಅಥವಾ ದಾನವಿರಬಹುದು. ಜ್ಞಾನಿಗಳು ದಾನ ಮಾಡುವಾಗ ಕೂಡಾ ಯಾವುದೇ ಐಹಿಕ ಫಲದ ಅಪೇಕ್ಷೆ ಇಲ್ಲದೆ ದಾನ ಮಾಡುತ್ತಾರೆ. ಉದಾಹರಣೆಗೆ ಅನ್ನದಾನ: ಅನ್ನದ ಅಭಿಮಾನಿ ಲಕ್ಷ್ಮಿ; ಅನ್ನದಾನ ಎಂದರೆ ದಾನ ಸ್ವೀಕರಿಸುವವನೊಳಗಿರುವ ವೈಶ್ವಾನರ ರೂಪಿ ನಾರಾಯಣನಿಗೆ ಲಕ್ಷ್ಮಿಯ ಸಮರ್ಪಣೆ. ಇದೇ ರೀತಿ ಕನ್ಯಾದಾನ: ಕನ್ಯಾದಾನ ಮಾಡುವಾಗ ಕನ್ಯಾಪಿತೃಗಳು ಗಂಡಿನ ಆಸ್ತಿ, ಹುದ್ದೆ, ಸಂಬಳ ನೋಡಿ ದಾನ ಮಾಡುವುದಲ್ಲ. ಬದಲಿಗೆ ಹುಡುಗಿಯ ಒಳಗಿರುವ ಲಕ್ಷ್ಮಿಯನ್ನು ಹುಡುಗನ ಒಳಗಿರುವ ನಾರಾಯಣನಿಗೆ ಅರ್ಪಿತವಾಗಲಿ ಎನ್ನುವ ಅನುಸಂಧಾನದಿಂದ ನೀಡುವುದು. ಹೀಗೆ ಮೋಕ್ಷಕಾಂಕ್ಷಿಗಳು "ಎಲ್ಲಾ ಮಾಡಿಸುವವನು ಆ ಭಗವಂತ-ಅವನ ಪ್ರೀತ್ಯರ್ಥ ಈ ಪೂಜೆ" ಎಂದು ಯಾವುದೇ ಲೌಕಿಕ ಫಲಾಪೇಕ್ಷೆ ಇಲ್ಲದೆ ಕ್ರಿಯೆವನ್ನು ಮಾಡುತ್ತಾರೆ. ಇದು 'ತತ್'.

ಸದ್ ಭಾವೇ ಸಾಧುಭಾವೇ ಚ ಸದಿತ್ಯೇತತ್ ಪ್ರಯುಜ್ಯತೇ ।
ಪ್ರಶಸ್ತೇ ಕರ್ಮಣಿ ತಥಾ ಸಚ್ಛಬ್ದಃ ಪಾರ್ಥ ಯುಜ್ಯತೇ ॥೨೬॥

ಸತ್ ಭಾವೇ ಸಾಧುಭಾವೇ ಚ ಸತ್ ಇತಿ ಏತತ್ ಪ್ರಯುಜ್ಯತೇ ।
ಪ್ರಶಸ್ತೇ ಕರ್ಮಣಿ ತಥಾ ಸತ್ ಶಬ್ದಃ ಪಾರ್ಥ ಯುಜ್ಯತೇ – ಪಾರ್ಥಾ, 'ಹುಟ್ಟು' ಮತ್ತು 'ಒಳ್ಳೆಯತನ' ಎಂಬ ಅರ್ಥದಲ್ಲಿ 'ಸತ್' ಎಂಬ ಶಬ್ದ ಬಳಕೆಯಾಗುತ್ತದೆ. 'ಒಳ್ಳೆಯ ಕೆಲಸ' ಎಂಬ ಅರ್ಥದಲ್ಲೂ 'ಸತ್' ಶಬ್ದ ಸಲ್ಲುತ್ತದೆ.

'ಸತ್' ಅನ್ನುವುದಕ್ಕೆ ಒಂದು ಅರ್ಥ-ಭಾವ. ಸತ್-ಭಾವ ಎಂದರೆ ಸಜ್ಜನಿಕೆಯಿಂದ ಇರುವುದು. ಇದು ಲೋಕದಲ್ಲಿ ವ್ಯಕ್ತಿಗೆ ಬಳಸುವ ಪದಪ್ರಯೋಗ. ಇದನ್ನು ಕರ್ಮದಲ್ಲಿ ಬಳಸಿದಾಗ ಸತ್-ಕರ್ಮವಾಗುತ್ತದೆ. ಓಂಕಾರ ವಾಚ್ಯ ಭಗವಂತನಿಗೆ ಅರ್ಪಣಾ ಭಾವದಿಂದ, ಯಾವುದೇ ಫಲಾಪೇಕ್ಷೆ ಇಲ್ಲದೆ(ತತ್) ಮಾಡುವ ಕರ್ಮ 'ಸತ್'-ಕರ್ಮ. ಯಾವ ಕರ್ಮವನ್ನು ಭಗವಂತನ ಕುರಿತಾಗಿ ಮಾಡುತ್ತೇವೋ, ಆ ಕರ್ಮ ಪ್ರಶಸ್ತವಾಗಿರಬೇಕು. ಅಂದರೆ ಸ್ವಾರ್ಥಕ್ಕಾಗಿ ಮಾಡಿದರೆ ಅದನ್ನು ಜನ ಮೆಚ್ಚುವುದಿಲ್ಲ. ಬದಲಿಗೆ ತ್ಯಾಗದಿಂದ ಮಾಡುವ ಕರ್ಮ ಪ್ರಶಸ್ತ ಕರ್ಮವೆನಿಸುತ್ತದೆ. ನಾವು ಈ ರೀತಿ ಪ್ರತಿಯೊಂದು ಶಬ್ದದ ಅರ್ಥವನ್ನು ತಿಳಿದು, ಪಾಲನೆ ಮಾಡುವ ಪಾರ್ಥರಾಗಬೇಕು ಎನ್ನುವುದು ಕೃಷ್ಣನ ಸಂದೇಶ. 'ಸತ್' ಪದದ ಅರ್ಥವನ್ನು ಇನ್ನೂ ವಿವರವಾಗಿ ಮುಂದಿನ ಶ್ಲೋಕದಲ್ಲಿ ಕೃಷ್ಣ ವಿವರಿಸುತ್ತಾನೆ.

ಯಜ್ಞೇ ತಪಸಿ ದಾನೇ ಚ ಸ್ಥಿತಿಃ ಸದಿತಿ ಚೋಚ್ಯತೇ ।
ಕರ್ಮ ಚೈವ ತದರ್ಥೀಯಂ ಸದಿತ್ಯೇವಾಭಿಧೀಯತೇ ॥೨೭॥

ಯಜ್ಞೇ ತಪಸಿ ದಾನೇ ಚ ಸ್ಥಿತಿಃ ಸತ್ ಇತಿ ಚ ಉಚ್ಯತೇ ।
ಕರ್ಮ ಚ ಏವ ತತ್ ಅರ್ಥೀಯಂ ಸತ್ ಇತಿ ಏವ ಅಭಿಧೀಯತೇ – ಯಜ್ಞ-ದಾನ-ತಪಸ್ಸುಗಳಲ್ಲಿ ನಿಷ್ಠೆಯನ್ನೂ 'ಸತ್' ಎನ್ನುತ್ತಾರೆ. ಭಗವಂತನಿಗಾಗಿ ಆಚರಿಸುವ ಕರ್ಮವನ್ನೂ 'ಸತ್' ಎಂದೇ ಕರೆಯುತ್ತಾರೆ.

'ಸತ್' ಎಂದರೆ 'ಸತ್' ಶಬ್ದ ವಾಚ್ಯನಾದ ಭಗವಂತನನ್ನು ಯಜ್ಞ, ದಾನ, ತಪಸ್ಸಿನಿಂದ ಆರಾಧಿಸುವುದು. ಹೀಗಾಗಿ ಭಗವಂತನೂ 'ಸತ್'; ಅವನ ಕುರಿತಾದ ಕರ್ಮವೂ 'ಸತ್'(ಸತ್ಕರ್ಮ); ಅವನ ಕುರಿತಾಗಿ ಕರ್ಮ ಮಾಡುವವನೂ 'ಸತ್'(ಸಜ್ಜನ). ನಾವು ಭಗವಂತನ ಎಚ್ಚರದಿಂದ, ಫಲಾಪೇಕ್ಷೆ ಇಲ್ಲದೆ, ಭಗವದರ್ಪಣಾ ಭಾವದಿಂದ, ಭಗವಂತ ಪ್ರೀತನಾಗಲಿ ಎಂದು ಮಾಡುವ ಸಮಸ್ತ ಕರ್ಮವೂ ಸತ್-ಕರ್ಮ.

ಅಶ್ರದ್ಧಯಾ ಹುತಂ ದತ್ತಂ ತಪಸ್ತಪ್ತಂ ಕೃತಂ ಚ ಯತ್ ।
ಅಸದಿತ್ಯುಚ್ಯತೇ ಪಾರ್ಥ ನ ಚ ತತ್ ಪ್ರೇತ್ಯ ನೋ ಇಹ ॥೨೮॥

ಅಶ್ರದ್ಧಯಾ ಹುತಮ್ ದತ್ತಮ್ ತಪಃ ತಪ್ತಮ್ ಕೃತಂ ಚ ಯತ್ ।
ಅಸತ್ ಇತಿ ಉಚ್ಯತೇ ಪಾರ್ಥ ನ ಚ ತತ್ ಪ್ರೇತ್ಯ ನೋ ಇಹ – ಮಾಡುವ ಕರ್ಮದಲ್ಲಿ ಶ್ರದ್ಧೆ ಇಲ್ಲದೆ, ಭಗವಂತನಲ್ಲಿ ಶ್ರದ್ಧೆ ಇಲ್ಲದೆ, ಯಾರದ್ದೋ ಒತ್ತಾಯಕ್ಕಾಗಿ, ಅಥವಾ ಭಯದಿಂದ, ಪೂರ್ಣ ನಂಬಿಕೆ ಇಲ್ಲದೆ ಮಾಡುವ ಕ್ರಿಯೆ ವ್ಯರ್ಥ. ಶ್ರದ್ಧೆ ಇಲ್ಲದೆ ಮಾಡುವ ಇಂತಹ ದಾನ, ತಪಸ್ಸು, ಯಜ್ಞ, ಅಥವಾ ಇತರ ಯಾವುದೇ ಕರ್ಮಕ್ಕೆ ಇಹದಲ್ಲೂ ಫಲವಿಲ್ಲ, ಪರದಲ್ಲೂ ಫಲವಿಲ್ಲ.

ಇತಿ ಸಪ್ತದಶೋಽಧ್ಯಾಯಃ
ಹದಿನೇಳನೆಯ ಅಧ್ಯಾಯ ಮುಗಿಯಿತು



# ಅಧ್ಯಾಯ ಹದಿನೆಂಟು

ಹಿಂದಿನ ಹದಿನೇಳು ಅಧ್ಯಾಯಗಳಲ್ಲಿ ನಮ್ಮ ಸಾಧನೆ ಹೇಗಿರಬೇಕು ಎನ್ನುವುದನ್ನು ವಿವರಿಸಿದ್ದ ಕೃಷ್ಣ, ಇಲ್ಲಿ ಆ ಸಾಧನೆಯ ಸಂದೇಶವನ್ನು ಸಂಗ್ರಹ ರೂಪದಲ್ಲಿ ನಮ್ಮ ಮುಂದಿಟ್ಟಿದ್ದಾನೆ. ಇದರ ಜೊತೆಗೆ ಅಧ್ಯಾಯ ಹದಿನೇಳರಲ್ಲಿ ವಿವರಿಸದೇ ಇರುವ ಸಾಧನೆಗೆ ಕುರಿತಾದ ತ್ರೈಗುಣ್ಯದ ಮುಂದುವರಿದ ವಿವರಣೆ ಕೂಡಾ ಇಲ್ಲಿದೆ. ಇದು ಗೀತೆಯ ಉಪಸಂಹಾರ. ಈ ಅಧ್ಯಾಯ ಅರ್ಜುನನ ಪ್ರಶ್ನೆಯೊಂದಿಗೆ ಆರಂಭವಾಗುತ್ತದೆ.

ಅರ್ಜುನ ಉವಾಚ ।
ಸಂನ್ಯಾಸಸ್ಯ ಮಹಾಬಾಹೋ ತತ್ತ್ವಮಿಚ್ಛಾಮಿ ವೇದಿತುಮ್ ।
ತ್ಯಾಗಸ್ಯ ಚ ಹೃಷೀಕೇಶ ಪೃಥಕ್ ಕೇಶಿನಿಸೂದನ ॥೧॥

ಅರ್ಜುನಃ ಉವಾಚ-ಅರ್ಜುನ ಕೇಳಿದನು:
ಸಂನ್ಯಾಸಸ್ಯ ಮಹಾಬಾಹೋ ತತ್ತ್ವಮ್ ಇಚ್ಛಾಮಿ ವೇದಿತುಮ್ ।
ತ್ಯಾಗಸ್ಯ ಚ ಹೃಷೀಕೇಶ ಪೃಥಕ್ ಕೇಶಿನಿಸೂದನ – ಮಹಾಬಾಹೋ, ಸಂನ್ಯಾಸದ ಮತ್ತು ತ್ಯಾಗದ ಅಂತರವೇನು? ಓ ಹೃಷೀಕೇಶ, ಇದರ ನಿಜವನ್ನು ಕೇಶಿನಿಸೂದನನಾದ ನೀನು ನನಗೆ ತಿಳಿಸು.

ಕೃಷ್ಣ ಮೊದಲು ಸಂನ್ಯಾಸದ ಬಗ್ಗೆ ಹೇಳಿದ್ದ; ಆನಂತರ ಹಿಂದಿನ ಅಧ್ಯಾಯದಲ್ಲಿ ಯಜ್ಞ, ದಾನ, ತಪಸ್ಸು ಎನ್ನುವ ಕರ್ಮಗಳನ್ನು ಹೇಳಿದ. ಇಲ್ಲಿ ನಮಗೆ ಸ್ವಲ್ಪ ಗೊಂದಲವಾಗುತ್ತದೆ. ಹಾಗಾಗಿ ಅರ್ಜುನ ಕೃಷ್ಣನಲ್ಲಿ ಕರ್ಮತ್ಯಾಗ ಮತ್ತು ಕರ್ಮಸಂನ್ಯಾಸ ಇವೆರಡರ ನಡುವಿನ ಅಂತರವೇನು ಎಂದು ಕೇಳುತ್ತಾನೆ. ತ್ಯಾಗ ಮತ್ತು ಸಂನ್ಯಾಸ ಎರಡು ಪದಗಳು ಮೇಲ್ನೋಟಕ್ಕೆ ಒಂದೇ ಅರ್ಥವನ್ನು ಕೊಟ್ಟಂತೆ ಕಂಡರೂ ಕೂಡಾ, ಅದು ಬೇರೆಬೇರೆ. ಸಂನ್ಯಾಸ ಮತ್ತು ತ್ಯಾಗದ ಮೂಲಭೂತ ಅರ್ಥವೇನು ? ಅವೆರಡನ್ನು ಪ್ರತ್ಯೇಕವಾಗಿ ಅರ್ಥೈಸುವುದು ಹೇಗೆ ಎನ್ನುವುದು ಅರ್ಜುನನ ಪ್ರಶ್ನೆ.

ಇಲ್ಲಿ ಅರ್ಜುನ ಕೃಷ್ಣನನ್ನು ಮಹಾಬಾಹೋ, ಹೃಷೀಕೇಶ ಮತ್ತು ಕೇಶಿನಿಸೂದನ ಎನ್ನುವ ಮೂರು ದಿವ್ಯ ನಾಮಗಳಿಂದ ಸಂಬೋಧಿಸಿದ್ದಾನೆ. ಇದು ಆತನಲ್ಲಿರುವ ಗುರುಭಕ್ತಿಯನ್ನು ಸೂಚಿಸುತ್ತದೆ ಮತ್ತು ಕೃಷ್ಣ ಕೇವಲ ವಸುದೇವನ ಮಗನಲ್ಲ, ಅವನು 'ಭಗವಂತ' ಎಂದು ಅರ್ಥ ಮಾಡಿಕೊಂಡು ಈ ಪ್ರಶ್ನೆ ಕೇಳಿರುವುದು ಇಲ್ಲಿ ಸ್ಪಷ್ಟವಾಗಿ ತಿಳಿಯುತ್ತದೆ. 'ಮಹಾಬಾಹು' ಎಂದರೆ ಶತ್ರುಗಳನ್ನು ಎದುರಿಸುವ, ನೀಳವಾದ, ಗಟ್ಟಿಯಾದ ತೊಳುಗಳುಳ್ಳವ ಎನ್ನುವುದು ಮೇಲ್ನೋಟದ ಅರ್ಥ. ದುಷ್ಟನಿಗ್ರಹ ಮಾಡಿ ಶಿಷ್ಟ ರಕ್ಷಣೆ ಮಾಡುವ, ಎಲ್ಲರೊಳಗಿನ ಅಜ್ಞಾನವನ್ನು ನೀಗಿಸುವ, ಲೋಕರಕ್ಷಕ ತೋಳುಳ್ಳವ ಎನ್ನುವುದು ಈ ದಿವ್ಯ ನಾಮದ ಹಿಂದಿರುವ ಮೂಲ ಅರ್ಥ. ಇನ್ನು 'ಹೃಷೀಕ' ಎಂದರೆ ಇಂದ್ರಿಯಗಳು. ಪಿಂಡಾಂಡದೊಳಗಿದ್ದು ಸರ್ವ ಇಂದ್ರಿಯಗಳನ್ನು ನಿಯಂತ್ರಿಸುವ ಭಗವಂತ ಹೃಷೀಕೇಶ. 'ಕೇಶಿ' ಅಂದರೆ ಸೂರ್ಯಕಿರಣ; ವಾಯುದೇವರು(**Ref:** ಋಗ್ವೇದ ೧೦.೧೩೬.೦೭). ಸೌರಮಂಡಲದಲ್ಲಿದ್ದು; ತನ್ನ ಅಂತರಂಗದ ಭಕ್ತನಾದ ಪ್ರಾಣದೇವರಲ್ಲಿದ್ದು; ನಮ್ಮ ಅಭೀಷ್ಟವನ್ನು ಪೂರೈಸುವ,

ನಮಗೆ ಶಕ್ತಿತುಂಬುವ ಭಗವಂತ 'ಕೇಶಿನಿಸೂದನ'. ಅವನು ಬ್ರಹ್ಮಾಂಡ ಮತ್ತು ಪಿಂಡಾಂಡದೊಳಗಿದ್ದು ಇಡೀ ವಿಶ್ವವನ್ನು ನಿಯಂತ್ರಿಸುವ ಮಹಾಶಕ್ತಿ . [ಹೆಚ್ಚಿನ ಕಡೆ 'ಕೇಶಿನಿಷೂದನ' ಎನ್ನುವ ಪದ ಬಳಕೆಯಲ್ಲಿದೆ, ಆದರೆ ಸರಿಯಾದ ಪದ ಕೇಶಿನಿಸೂದನ).

ಭಗವಾನುವಾಚ ।

ಕಾಮ್ಯಾನಾಂ ಕರ್ಮಣಾಂ ನ್ಯಾಸಂ ಸಂನ್ಯಾಸಂ ಕವಯೋ ವಿದುಃ ।
ಸರ್ವಕರ್ಮಫಲತ್ಯಾಗಂ ಪ್ರಾಹುಸ್ತ್ಯಾಗಂ ವಿಚಕ್ಷಣಾಃ ॥೨॥

ಭಗವಾನ್ ಉವಾಚ- ಭಗವಂತ ಹೇಳಿದನು:

ಕಾಮ್ಯಾನಾಮ್ ಕರ್ಮಣಾಮ್ ನ್ಯಾಸಮ್ ಸಂನ್ಯಾಸಂ ಕವಯಃ ವಿದುಃ ।

ಸರ್ವಕರ್ಮಫಲ ತ್ಯಾಗಮ್ ಪ್ರಾಹುಃ ತ್ಯಾಗಂ ವಿಚಕ್ಷಣಾಃ –ಕಾಮ್ಯ ಕರ್ಮಗಳನ್ನು ತೊರೆಯುವುದನ್ನು ಬಲ್ಲವರು 'ಸಂನ್ಯಾಸ' ಎನ್ನುತ್ತಾರೆ. ಎಲ್ಲಾ ಕರ್ಮಗಳ ಫಲವನ್ನಷ್ಟೇ ತೊರೆಯುವುದನ್ನು ತಿಳಿದವರು 'ತ್ಯಾಗ' ಎನ್ನುತ್ತಾರೆ.

ಇಲ್ಲಿ ಹೇಳುವ ಸಂನ್ಯಾಸ ಗೃಹಸ್ಥರನ್ನೂ ಒಳಗೊಂಡು ಎಲ್ಲಾ ಸಾಧಕರಿಗೂ ಅನ್ವಯವಾಗುವ ಸಂನ್ಯಾಸ. ಸಂನ್ಯಾಸದಲ್ಲಿ ಎರಡು ವಿಧ. ಒಂದು ಕರ್ಮದ ಫಲವನ್ನು ಬಿಡುವುದು, ಇನ್ನೊಂದು ಬಯಕೆಗಳಿಂದ ಪ್ರೇರಿತವಾದ ಕರ್ಮವನ್ನೇ ತ್ಯಾಗ ಮಾಡುವುದು. ಇಲ್ಲಿ ತ್ಯಾಗ ಎಂದರೆ ಕರ್ಮವನ್ನು ತ್ಯಾಗ ಮಾಡುವುದಲ್ಲ, ಬದಲಿಗೆ ಯಾವ ಕರ್ಮವೇ ಇರಲಿ, ಅದನ್ನು ಮಾಡಿ-ಯಾವುದೇ ಫಲವನ್ನು ಬಯಸದೇ ಇರುವುದು. ಆದ್ದರಿಂದ ಕರ್ಮತ್ಯಾಗ ಎಂದರೆ: ವೇದಾಧ್ಯಯನ ಬಿಡುವುದು, ಸಂಧ್ಯಾವಂದನೆ ಬಿಡುವುದು, ವ್ರತಾನುಷ್ಠಾನ ಇತ್ಯಾದಿಯನ್ನು ಬಿಡುವುದು ಎಂದಲ್ಲ. ಬದಲಿಗೆ ಸತ್ಕರ್ಮವನ್ನು ಮಾಡಿ ಅದರ ಫಲವನ್ನು ಬಯಸದೇ ಇರುವುದು ಎಂದರ್ಥ. ಯಾವ ಕರ್ಮವೇ ಇರಲಿ ಅದನ್ನು ಭಗವದ್ ಪ್ರೀತ್ಯರ್ತ ಮಾಡು-ಫಲ ಬಯಕೆಯಿಂದಲ್ಲ.

ಇಲ್ಲಿ ಕವಯಃ ಮತ್ತು ವಿಚಕ್ಷಣಾಃ ಎನ್ನುವ ಎರಡು ವಿಶೇಷ ಪದಗಳನ್ನು ಬಳಸಲಾಗಿದೆ. ಶಬ್ದಾರ್ಥದ ಸಂಬಂಧವನ್ನು ತಿಳಿದವರು-ಕವಿಗಳು; ಶಬ್ದಾರ್ಥವನ್ನು ತಿಳಿದು ಅದನ್ನು ಅನುಭವಿಸಿ ಆಚರಿಸುವವರು ವಿಚಕ್ಷಣರು. "ಕವಿಗಳು ಮತ್ತು ವಿಚಕ್ಷಣರು ಸಂನ್ಯಾಸ ಮತ್ತು ತ್ಯಾಗಕ್ಕೆ ಈ ವಿವರಣೆಯನ್ನು ಕೊಡುತ್ತಾರೆ" ಎಂದಿದ್ದಾನೆ ಕೃಷ್ಣ.

ತ್ಯಾಜ್ಯಂ ದೋಷವದಿತ್ಯೇಕೇ ಕರ್ಮ ಪ್ರಾಹುರ್ಮನೀಷಿಣಃ ।
ಯಜ್ಞದಾನತಪಃಕರ್ಮ ನ ತ್ಯಾಜ್ಯಮಿತಿ ಚಾಪರೇ ॥೩॥

ತ್ಯಾಜ್ಯಂ ದೋಷವತ್ ಇತಿ ಏಕೇ ಕರ್ಮ ಪ್ರಾಹುಃ ಮನೀಷಿಣಃ ।

ಯಜ್ಞದಾನತಪಃಕರ್ಮ ನ ತ್ಯಾಜ್ಯಮ್ ಇತಿ ಚ ಅಪರೇ – ದೋಷವುಳ್ಳ ಕರ್ಮವನ್ನು ತೊರೆಯಬೇಕು ಎಂದು ಕೆಲವು ವಿದ್ವಾಂಸರು ಹೇಳುತ್ತಾರೆ. ಯಜ್ಞ-ದಾನ-ತಪಗಳೆಂಬ ಕರ್ಮವನ್ನು ಬಿಡಬಾರದು ಎನ್ನುತ್ತಾರೆ ಮತ್ತೆ ಕೆಲವರು.

ಕರ್ಮತ್ಯಾಗದ ಬಗ್ಗೆ ಒಂದೊಂದು ಶಾಸ್ತ ಒಂದೊಂದು ರೀತಿ ಹೇಳಿದಂತೆ ನಮಗೆ ಕಾಣುತ್ತದೆ. ಆದರೆ ಎಲ್ಲಾ ಶಾಸ್ತ್ರಗಳ ಅಂತರಂಗದ ತಿರುಳು ಒಂದೇ. ತ್ಯಾಗ ಅಂದರೆ ಏನು ಎನ್ನುವುದು ತಿಳಿದಾಗ ಇದು ಸ್ಪಷ್ಟವಾಗುತ್ತದೆ. ತಿಳಿದ ಬುದ್ಧಿವಂತರು ಹೇಳುತ್ತಾರೆ: "ಕರ್ಮವನ್ನು ಬಿಡಬೇಕು" ಎಂದು. ಇನ್ನು ಕೆಲವು ವೇದಾನುಯಾಯಿಗಳು ಹೇಳುತ್ತಾರೆ: "ಯಜ್ಞ-ದಾನ-ತಪಸ್ಸನ್ನು ಮಾಡಬೇಕು" ಎಂದು. "ನಿನ್ನ ಉಸಿರಿರುವ ತನಕ ಅಗ್ನಿಹೋತ್ರದಿಂದ ಭಗವಂತನನ್ನು ಆರಾಧಿಸು" ಎನ್ನುತ್ತದೆ-ಯಜುರ್ವೇದ. ಇಲ್ಲಿ ಹೇಳಿದ ವಿಷಯ ಸರಿಯಾಗಿ ಅರ್ಥವಾಗಬೇಕಾದರೆ ನಾವು ತ್ಯಾಗ ಪದದ ಅರ್ಥವನ್ನು ವಿವಿಧ ಮುಖದಲ್ಲಿ ನೋಡಬೇಕು. ಮುಂದಿನ ಶ್ಲೋಕಗಳಲ್ಲಿ ಕೃಷ್ಣ ಇದರ ಸುಂದರ ವಿವರಣೆಯನ್ನು ಕೊಟ್ಟಿದ್ದಾನೆ.

ನಿಶ್ಚಯಂ ಶೃಣು ಮೇ ತತ್ರ ತ್ಯಾಗೇ ಭರತಸತ್ತಮ ।
ತ್ಯಾಗೋ ಹಿ ಪುರುಷವ್ಯಾಘ್ರ ತ್ರಿವಿಧಃ ಸಂಪ್ರಕೀರ್ತಿತಃ ॥೪॥

ನಿಶ್ಚಯಮ್ ಶೃಣು ಮೇ ತತ್ರ ತ್ಯಾಗೇ ಭರತಸತ್ತಮ ।
ತ್ಯಾಗಃ ಹಿ ಪುರುಷವ್ಯಾಘ್ರ ತ್ರಿವಿಧಃ ಸಂಪ್ರಕೀರ್ತಿತಃ -- ಭರತಸತ್ತಮಾ, ಅದರಲ್ಲಿ ತ್ಯಾಗದ ಬಗ್ಗೆ ನನ್ನ ನಿರ್ಧಾರ ಕೇಳು. ಪುರುಷವ್ಯಾಘ್ರಾ, ಮೂರು ಬಗೆಯ ತ್ಯಾಗ ಉಕ್ತವಾಗಿದೆ.

"ತ್ಯಾಗದ ವಿಷಯದಲ್ಲಿ ನಿಶ್ಚಿತವಾದ ಅಭಿಪ್ರಾಯವನ್ನು ನಿನಗೆ ಹೇಳುತ್ತೇನೆ" ಎನ್ನುತ್ತಾನೆ ಕೃಷ್ಣ. ಹೇಗೆ ಯಜ್ಞ-ದಾನ-ತಪಸ್ಸು ಮೂರು ವಿಧವೋ ಹಾಗೇ ತ್ಯಾಗವೂ ಕೂಡಾ ಮೂರು ವಿಧ. ಅದನ್ನು ಕೃಷ್ಣ ಅರ್ಜುನನಿಗೆ ವಿವರಿಸುತ್ತಾನೆ. ಇಲ್ಲಿ ಕೃಷ್ಣ ಅರ್ಜುನನನ್ನು ಭರತಸತ್ತಮ ಮತ್ತು ಪುರುಷವ್ಯಾಘ್ರ ಎಂದು ಸಂಬೋಧಿಸಿದ್ದಾನೆ. ಭರತವಂಶದ ಅರಸರ ಮಾಲಿಕೆಯಲ್ಲಿ ಗಣ್ಯನಾದ್ದರಿಂದ ಅರ್ಜುನ ಭರತಸತ್ತಮ-ಇದು ಮೇಲ್ನೋಟದ ಅರ್ಥ. ಭಗವಂತನಲ್ಲಿ ಮತ್ತು ಜ್ಞಾನದಲ್ಲಿ ರತನಾದವ, ಭಕ್ತಿ ಉಳ್ಳವ ಭರತಸತ್ತಮ ಎನ್ನುವುದು ಈ ಸಂಬೋಧನೆಯ ಅಂತರಂಗದ ಅರ್ಥ. ಅದೇ ರೀತಿ ಪುರುಷವ್ಯಾಘ್ರ ಎಂದರೆ ಪುರುಷಶ್ರೇಷ್ಠ ಎಂದರ್ಥ. ಭಗವಂತನ ಕಡೆಗೆ ತಮ್ಮ ಮನಸ್ಸನ್ನು ಹರಿಯಗೊಟ್ಟವರು ಪುರುಷರು. ಅವರಲ್ಲಿ ಶ್ರೇಷ್ಠ-ಪುರುಷಶ್ರೇಷ್ಠ. ಅಂದರೆ ಜ್ಞಾನಿಗಳಲ್ಲಿ ಶ್ರೇಷ್ಠ ಎಂದರ್ಥ. ನಾವೂ ಕೂಡಾ ನಮ್ಮ ಜೀವನದಲ್ಲಿ ಭರತಸತ್ತಮರು, ಪುರುಷವ್ಯಾಘ್ರರು ಆಗಬೇಕು. ಆಗ ಭಗವಂತನ ಸಂದೇಶ ನಮಗೆ ತಲುಪುತ್ತದೆ.

ಯಜ್ಞದಾನತಪಃಕರ್ಮ ನ ತ್ಯಾಜ್ಯಂ ಕಾರ್ಯಮೇವ ತತ್ ।
ಯಜ್ಞೋ ದಾನಂ ತಪಶ್ಚೈವ ಪಾವನಾನಿ ಮನೀಷಿಣಾಮ್ ॥೫॥

ಯಜ್ಞ ದಾನ ತಪಃ ಕರ್ಮ ನ ತ್ಯಾಜ್ಯಮ್ ಕಾರ್ಯಮ್ ಏವ ತತ್।
ಯಜ್ಞಃ ದಾನಮ್ ತಪಃ ಚ ಏವ ಪಾವನಾನಿ ಮನೀಷಿಣಾಮ್ – ಯಜ್ಞ-ದಾನ-ತಪಗಳೆಂಬ ಕರ್ಮವನ್ನು ಬಿಡಲಾಗದು. ಅದನ್ನು ಮಾಡಲೇಬೇಕು. ಯಜ್ಞ, ದಾನ, ತಪಸ್ಸು ಜ್ಞಾನಿಗಳನ್ನು ಪಾವನಗೊಳಿಸುತ್ತದೆ.

ಯಾವಾಗಲೂ ಭಗವಂತನ ಆರಾಧನಾ ರೂಪವಾದ ಯಜ್ಞ, ದಾನ, ತಪವನ್ನು ಬಿಡಬಾರದು. ಅದನ್ನು ಮಾಡಲೇಬೇಕು. ಇದಕ್ಕಿಂತ ಮಂಗಳವಾದ ಸಂಗತಿ ಇನ್ನೊಂದಿಲ್ಲ. ಇವು ಮೂರೂ ಕೂಡಾ ನಮ್ಮ ಬದುಕನ್ನು ಪವಿತ್ರಗೊಳಿಸುವ ಕ್ರಿಯೆಗಳು. ಇದಕ್ಕಿಂತ ಹೆಚ್ಚು ಪವಿತ್ರವಾದ ಕ್ರಿಯೆ ಇನ್ನೊಂದು ಜಗತ್ತಿನಲ್ಲಿಲ್ಲ. ಇತರ ಎಲ್ಲಾ ಕ್ರಿಯೆಗಳೂ ಈ ಮೂರು ಕ್ರಿಯೆಯಲ್ಲಿ ಅಂತರ್ಭಾವವಾಗಿರುತ್ತವೆ. ಆದ್ದರಿಂದ ನಮ್ಮ ಜೀವನದ ಪ್ರತಿಯೊಂದು ಕ್ರಿಯೆ ಕೂಡಾ ಯಜ್ಞ-ದಾನ-ತಪವಾಗಬೇಕು.

ಏತಾನ್ಯಪಿತು ಕರ್ಮಾಣಿ ಸಂಗಂ ತ್ಯಕ್ತ್ವಾ ಫಲಾನಿ ಚ ।
ಕರ್ತವ್ಯಾನೀತಿ ಮೇ ಪಾರ್ಥ ನಿಶ್ಚಿತಂ ಮತಮುತ್ತಮಮ್ ॥೬॥

ಏತಾನಿ ಅಪಿ ತು ಕರ್ಮಾಣಿ ಸಂಗಮ್ ತ್ಯಕ್ತ್ವಾ ಫಲಾನಿ ಚ ।
ಕರ್ತವ್ಯಾನಿ ಇತಿ ಮೇ ಪಾರ್ಥ ನಿಶ್ಚಿತಮ್ ಮತಮ್ ಉತ್ತಮಮ್ – ಆದರೆ, ಪಾರ್ಥಾ, ಈ ಕರ್ಮಗಳನ್ನು ಮಮತೆ ತೊರೆದು, ಫಲದ ಹಂಬಲ ತೊರೆದು ಮಾಡಬೇಕು ಎನ್ನುವುದು ನನ್ನ ಖಚಿತವಾದ ಮತ್ತು ಹಿರಿದಾದ ಆಶಯ.

ಕರ್ಮ ಮಾಡುವಾಗ ಅದರಲ್ಲಿ ಬರುವ ಮೂಲ ದೋಷ 'ನಾನು ಮಾಡಿದೆ, ನನ್ನಿಂದಾಯಿತು' ಎನ್ನುವ ಅಹಂಕಾರ. ಇದರ ಜೊತೆಗೆ ದೇವರ ಬಳಿ ನಮ್ಮ ಫಲಕಾಮನೆಯ ಪಟ್ಟಿ ಕೊಟ್ಟು ಫಲಾಪೇಕ್ಷೆಯಿಂದ ಕರ್ಮ ಮಾಡುವುದು. ಇವು ಕರ್ಮದಲ್ಲಿನ ಮಹಾದೋಷ. ಅಹಂಕಾರದಿಂದ ಕರ್ಮ ಮಾಡಿದರೆ ಅದು ವ್ಯರ್ಥ –ಏಕೆಂದರೆ ಅಹಂಕಾರವಿದ್ದೆಡೆಗೆ ಭಗವಂತ ಬರಲಾರ. ಇನ್ನು ನಾವು ಫಲದ ಅಸೆಯಿಂದ ಕರ್ಮ ಮಾಡುವುದು. ಫಲದಾಸೆಯಿಂದ ಕರ್ಮ ಮಾಡಿ ಒಂದು ವೇಳೆ ನಾವು ಬಯಸಿದ ಫಲ ನೆರವೇರದಿದ್ದರೆ, ಆಗ ನಮಗೆ ಆ ಕರ್ಮದಲ್ಲಿ ಆಸಕ್ತಿ ದೂರವಾಗುತ್ತದೆ. ದೇವರ ಬಗ್ಗೆ ವೈರತ್ವ ಉಂಟಾಗುತ್ತದೆ. ಇದು ಫಲಾಪೇಕ್ಷೆಯಿಂದ ಕರ್ಮ ಮಾಡುವುದರಿಂದ ಆಗುವ ಅನಾಹುತ. "ಇದು ನನ್ನ ನಿಶ್ಚಿತವಾದ ಅಭಿಪ್ರಾಯ. ನೀನು ಬಿಡಬೇಕಾದದ್ದು ಕರ್ಮವನ್ನಲ್ಲ, ಬದಲಿಗೆ ಕರ್ಮಫಲವನ್ನು ಮತ್ತು ನಾನು ಮಾಡಿದೆ ಎನ್ನುವ ಆಸಕ್ತಿ-ಅಹಂಕಾರವನ್ನು" ಎನ್ನುತ್ತಾನೆ ಕೃಷ್ಣ. ಇದು ಕರ್ಮ ಸಿದ್ಧಾಂತದ ಅತ್ಯಂತ ಶ್ರೇಷ್ಠ ತೀರ್ಮಾನ. ಅಹಂಕಾರವನ್ನು, ಕಾಮ್ಯಕರ್ಮವನ್ನು(ಫಲಕ್ಕಾಗಿಯೇ ಕರ್ಮ ಮಾಡುವುದನ್ನು) ಮತ್ತು ಕರ್ಮದಲ್ಲಿ ಫಲವನ್ನು ಬಯಸುವುದನ್ನು- ಬಿಡುವುದು ನಿಜವಾದ ತ್ಯಾಗವೇ ಹೊರತು, ನಿಯತಕರ್ಮವನ್ನು ಬಿಡುವುದಲ್ಲ. ಇದು ನಿಶ್ಚಿತವಾದ ಸಿದ್ಧಾಂತ.

ನಿಯತಸ್ಯ ತು ಸಂನ್ಯಾಸಃ ಕರ್ಮಣೋ ನೋಪಪದ್ಯತೇ ।
ಮೋಹಾತ್ ತಸ್ಯ ಪರಿತ್ಯಾಗಸ್ತಾಮಸಃ ಪರಿಕೀರ್ತಿತಃ ॥೭॥

ನಿಯತಸ್ಯ ತು ಸಂನ್ಯಾಸಃ ಕರ್ಮಣಃ ನ ಉಪಪದ್ಯತೇ ।
ಮೋಹಾತ್ ತಸ್ಯ ಪರಿತ್ಯಾಗಃ ತಾಮಸಃ ಪರಿಕೀರ್ತಿತಃ – ವಿಹಿತವಾದ ಕರ್ಮವನ್ನು ತೊರೆಯುವುದು ತರವಲ್ಲ. ಅರಿವುಗೆಟ್ಟು ಅದನ್ನು ತೊರೆವುದು ತಾಮಸ ತ್ಯಾಗ ಎನಿಸುತ್ತದೆ.

ಯಾವ ಕಾಲಕ್ಕೂ ನಾವು ನಮ್ಮ ನಿಯತಕರ್ಮವನ್ನು ತೊರೆಯಬಾರದು. ಒಂದು ವೇಳೆ ತಪ್ಪು ತಿಳುವಳಿಕೆಯಿಂದ ನಿಯತ ಕರ್ಮವನ್ನು ಬಿಟ್ಟರೆ ಆಗ ಅದು ತಾಮಸ ತ್ಯಾಗ ಎನಿಸುತ್ತದೆ. ಇಲ್ಲಿ 'ನಿಯತಕರ್ಮ' ಎಂದರೆ ನಮ್ಮ ಜೀವಯೋಗ್ಯತೆಗೆ ಯಾವುದು ನಿಯತವೋ ಆ ಕರ್ಮ. ನಮಗೆ ತಿಳಿದಂತೆ ಎಲ್ಲಾ ಕರ್ಮವನ್ನು ಎಲ್ಲರೂ ಮಾಡುವಂತಿಲ್ಲ. ಉದಾಹರಣೆಗೆ ಯಜ್ಞ: ಯತಿಗಳು ಅಗ್ನಿಮುಖದಲ್ಲಿ ಆಹುತಿ ನೀಡುವಂತಿಲ್ಲ; ಬ್ರಹ್ಮಚಾರಿಗಳು ಪೂರ್ಣಪ್ರಮಾಣದ ಅಗ್ನಿಹೋತ್ರ ಮಾಡುವಂತಿಲ್ಲ. ಆದರೆ ಯತಿಗಳು ಜ್ಞಾನಯಜ್ಞ ಮಾಡಬಹುದು ಅದು ಅವರ ನಿಯತಕರ್ಮ. ಎಲ್ಲಾ ಕಾಲದಲ್ಲೂ ಎಲ್ಲರೂ ಮಾಡಬಹುದಾದ ಯಜ್ಞ 'ನಾಮಯಜ್ಞ'. ಅಂದರೆ ಭಗವಂತನ ನಾಮ ಸ್ಮರಣೆ. ಇದು ಯಜ್ಞದಲ್ಲಿ ಎಲ್ಲರಿಗೂ ಅನ್ವಯಿಸುವ ನಿಯತಕರ್ಮ. ಇನ್ನು ದಾನ: ಬ್ರಹ್ಮಚಾರಿಗಳು ಕನ್ಯಾದಾನ ಮಾಡಲಾಗುವುದಿಲ್ಲ, ಅದನ್ನು ಗೃಹಸ್ಥ ಮಾಡಬೇಕು. ಗೃಹಸ್ಥನಿಗೆ ಕನ್ಯಾದಾನ ನಿಯತಕರ್ಮ. ಎಲ್ಲರೂ ಮಾಡಬಹುದಾದ ದಾನ-ಅಭಯದಾನ ಮತ್ತು ಜ್ಞಾನದಾನ. ಮೂರನೆಯದು ತಪಸ್ಸು: ಕೆಲವು ತಪಸ್ಸನ್ನು ಎಲ್ಲರೂ ಮಾಡಲಾಗುವುದಿಲ್ಲ. ಅದಕ್ಕೆ ವೇದದೀಕ್ಷೆ ಬೇಕಾಗಬಹುದು. ಆದರೆ ಎಲ್ಲರೂ ಮಾಡಬಹುದಾದ ತಪಸ್ಸು ಎಂದರೆ ಉಪವಾಸಾದಿ ವ್ರತಾನುಷ್ಠಾನಗಳು. ಈ ತಪಸ್ಸನ್ನು ಮನುಷ್ಯ ಮಾತ್ರದವರು ಮಾಡಬಹುದು. ಹೀಗೆ ಯಾರಿಗೆ ಯಾವ ಕರ್ಮ ನಿಯತವೋ ಆ ಕರ್ಮವನ್ನು ಮಾಡಬೇಕು. ನಿಯತ ಕರ್ಮದಲ್ಲಿ ಫಲಾಪೇಕ್ಷೆಯ ಪ್ರಶ್ನೆಯೇ ಇಲ್ಲ. ತಪ್ಪು ತಿಳುವಳಿಕೆಯಿಂದ ನಿಯತಕರ್ಮವನ್ನು ಬಿಟ್ಟರೆ ಅದು ತಾಮಸ ತ್ಯಾಗ ಎನಿಸುತ್ತದೆ ಎನ್ನುವ ಎಚ್ಚರವನ್ನು ಕೃಷ್ಣ ಈ ಶ್ಲೋಕದ ಮೂಲಕ ಕೊಟ್ಟಿದ್ದಾನೆ.

ದುಃಖಮಿತ್ಯೇವ ಯತ್ ಕರ್ಮ ಕಾಯಕ್ಲೇಶಭಯಾತ್ ತ್ಯಜೇತ್ ।
ಸ ಕೃತ್ವಾ ರಾಜಸಂ ತ್ಯಾಗಂ ನೈವ ತ್ಯಾಗಫಲಂ ಲಭೇತ್ ॥೮॥

ದುಃಖಮ್ ಇತಿ ಏವ ಯತ್ ಕರ್ಮ ಕಾಯ ಕ್ಲೇಶ ಭಯಾತ್ ತ್ಯಜೇತ್ ।
ಸಃ ಕೃತ್ವಾ ರಾಜಸಮ್ ತ್ಯಾಗಮ್ ನ ಏವ ತ್ಯಾಗ ಫಲಮ್ ಲಭೇತ್ – ಮಾಡುವುದಕ್ಕೆ ಮೈಬಗ್ಗದೆ, ಬಗೆಯೊಗ್ಗದೆ, ಕಷ್ಟವಾಗುತ್ತದೆ ಎಂದು ಮಾಡದೇ ಇರುವುದು ರಾಜಸ ತ್ಯಾಗ. ಇಂತಹ ತ್ಯಾಗ ಮಾಡಿಯೂ ತ್ಯಾಗದ ಫಲ ದೊರೆಯದು.

ನಮಗೆ ನಮ್ಮ ನಿಯತಕರ್ಮ ಮಾಡಬೇಕು ಎನ್ನುವುದು ಗೊತ್ತಿದ್ದೂ, ಮನಸ್ಸಿಗೆ ದೇಹಕ್ಕೆ ನೋವಾಗುತ್ತದೆ ಎನ್ನುವ ಕಾರಣಕ್ಕಾಗಿ ಕರ್ಮವನ್ನು ಮಾಡದೇ ಬಿಡುವುದು ರಾಜಸ ತ್ಯಾಗ ಎನಿಸುತ್ತದೆ. ಉದಾಹರಣೆಗೆ ಯಾವುದೋ ದೂರದರ್ಶನದ ದಾರಾವಾಹಿಯನ್ನು ನೋಡಬೇಕು ಎನ್ನುವ ಮನಸ್ಸಿನ ಉತ್ಕಟ ಬಯಕೆಯಿಂದ ಕರ್ಮವನ್ನು ಕೈಬಿಡುವುದು, ಚಳಿಯಾಗುತ್ತದೆ ಎಂದು ಸಂಧ್ಯಾವಂದನೆ ಮಾಡದೇ ಇರುವುದು, ಇತ್ಯಾದಿ ರಾಜಸ ತ್ಯಾಗ. ಇಂತಹ ರಾಜಸ ತ್ಯಾಗ ಮಾಡಿದರೆ ನಿಜವಾದ ತ್ಯಾಗದ ಫಲ ಸಿಗದು.

ಕಾರ್ಯಮಿತ್ಯೇವ ಯತ್ ಕರ್ಮ ನಿಯತಂ ಕ್ರಿಯತೇಽರ್ಜುನ ।
ಸಂಗಂ ತ್ಯಕ್ತ್ವಾ ಫಲಂ ಚೈವ ಸ ತ್ಯಾಗಃ ಸಾತ್ತ್ವಿಕೋ ಮತಃ ॥೯॥

ಕಾರ್ಯಮ್ ಇತಿ ಏವ ಯತ್ ಕರ್ಮ ನಿಯತಮ್ ಕ್ರಿಯತೇ ಅರ್ಜುನ ।
ಸಂಗಂ ತ್ಯಕ್ತ್ವಾ ಫಲಂ ಚ ಏವ ಸಃ ತ್ಯಾಗಃ ಸಾತ್ತ್ವಿಕಃ ಮತಃ – ಅರ್ಜುನಾ, ಕರ್ತವ್ಯ ದೃಷ್ಟಿಯಿಂದ ವಿಹಿತ ಕರ್ಮವನ್ನು ಮಾಡುತ್ತಲೇ ಮಮತೆಯನ್ನೂ ಫಲದ ಹಂಬಲವನ್ನೂ ತೊರೆಯುವುದು ಸಾತ್ತ್ವಿಕ ತ್ಯಾಗ ಎನಿಸುತ್ತದೆ.

ನಿಯತಕರ್ಮವನ್ನು ಮಾಡದೇ ಇರಲು ಸಾಧ್ಯವಿಲ್ಲ ಎನ್ನುವ ಮಟ್ಟಕ್ಕೆ ನಮ್ಮ ಮನಸ್ಸು ತಲುಪಬೇಕು. ಈ ರೀತಿ ಸತ್ತ್ವಗುಣ ಮನಸ್ಸಿನಲ್ಲಿ ತುಂಬಿದಾಗ(ಅರ್ಜುನರಾದಾಗ)ಯಾವ ಕರ್ಮವನ್ನೂ ಬಿಡಲು ನಮಗೆ ಮನಸ್ಸಾಗುವುದಿಲ್ಲ. ಅಲ್ಲಿ ಫಲದ ಬಯಕೆ ಇರುವುದೇ ಇಲ್ಲ. ಸದಾ ಭಗವದರ್ಪಣ ಭಾವನೆಯಲ್ಲಿ ಖುಷಿಯಿಂದ ಕರ್ಮ ಮಾಡುವುದು; ಯಾವುದೇ ಅಹಂಕಾರ ಇಲ್ಲದೇ ಇರುವುದು; ಎಲ್ಲಾ ಕರ್ಮದ ಮಹತ್ವ ತಿಳಿದು ನಿಯತವಾಗಿ ಕರ್ಮ ಮಾಡುವುದು- ಸಾತ್ತ್ವಿಕತ್ಯಾಗ. ಇಲ್ಲಿ ತ್ಯಾಗ ಮಾಡುವುದು ಕರ್ಮವನ್ನಲ್ಲ ಬದಲಿಗೆ ಕರ್ಮ ಫಲವನ್ನು.
ಹೀಗೆ ನಮ್ಮಲ್ಲಿರುವ ಗೊಂದಲಗಳಿಗೆ ಕೃಷ್ಣ ಅತ್ಯಂತ ಸರಳವಾದ ಉತ್ತರ ಕೊಟ್ಟ. ಒಟ್ಟಿನಲ್ಲಿ ಹೇಳಬೇಕೆಂದರೆ: ಫಲಾಪೇಕ್ಷೆ ಇಲ್ಲದೆ ಅಹಂಕಾರ ತೊರೆದು ನಿಯತಕರ್ಮವನ್ನು ಮಾಡುವುದು ಸಾತ್ತ್ವಿಕ ತ್ಯಾಗ; ಸೋಮಾರಿತನದಿಂದ ಕಷ್ಟವಾಗುತ್ತದೆ ಎಂದು ನಿಯತಕರ್ಮವನ್ನು ಬಿಡುವುದು ರಾಜಸ ತ್ಯಾಗ ಮತ್ತು ತಪ್ಪು ತಿಳುವಳಿಕೆಯಿಂದ, 'ಎಲ್ಲವೂ ಮೂಢನಂಬಿಕೆ' ಎಂದು ನಿಯತಕರ್ಮವನ್ನು ಮಾಡದೇ ಬಿಡುವುದು ತಾಮಸ ತ್ಯಾಗ.

ನ ದ್ವೇಷ್ಟ್ಯಕುಶಲಂ ಕರ್ಮ ಕುಶಲೇ ನಾನುಷಜ್ಜತೇ ।
ತ್ಯಾಗೀ ಸತ್ತ್ವಸಮಾವಿಷ್ಟೋ ಮೇಧಾವೀ ಛಿನ್ನಸಂಶಯಃ ॥೧೦॥

ನ ದ್ವೇಷ್ಟಿ ಅಕುಶಲಮ್ ಕರ್ಮ ಕುಶಲೇ ನ ಅನುಷಜ್ಜತೇ ।
ತ್ಯಾಗೀ ಸತ್ತ್ವಸಮಾವಿಷ್ಟಃ ಮೇಧಾವೀ ಛಿನ್ನಸಂಶಯಃ – ಮುದ ನೀಡದ ಕರ್ಮದ ಬಗ್ಗೆ ಹಗೆಯೂ ಇಲ್ಲ, ಮುದ ನೀಡುವ ಕರ್ಮದ ಬಗ್ಗೆ ಅತಿಯಾದ ನಂಟೂ ಇಲ್ಲ. ಇಂತವನು ಸಾತ್ತ್ವಿಕ-ತ್ಯಾಗಿ. ಅವನು ತಿಳಿದವನು ಮತ್ತು ಸಂದೇಹವಳಿದವನು.
ಈ ಶ್ಲೋಕ ಒಬ್ಬ ಸಾತ್ವಿಕ ತ್ಯಾಗಿ ಯಾವ ರೀತಿ ತನ್ನ ಕರ್ಮಗಳನ್ನು ನೋಡುತ್ತಾನೆ ಎನ್ನುವುದನ್ನು ಹೇಳುತ್ತದೆ. ನಾವು ಮಾಡಿದ ಹಿಂದಿನ ಯಾವುದೋ ಒಂದು ಕರ್ಮದಿಂದ ಇಂದು ಕೆಟ್ಟ ಪರಿಣಾಮ ಆಗುತ್ತಿದ್ದರೆ, ಅಥವಾ ಹಿಂದೆ ಮಾಡಿದ ಇನ್ಯಾವುದೋ ಕರ್ಮದಿಂದ ಒಳ್ಳೆಯದು ಆಗುತ್ತಿದ್ದರೆ, ಸಾತ್ವಿಕ ತ್ಯಾಗಿ ಅದರ ಬಗ್ಗೆ ತಲೆಕೆಡಿಸಿಕೊಳ್ಳುವುದಿಲ್ಲ. ಆತ ಒಳ್ಳೆಯದಾಯಿತು ಎಂದು ಹಾರಾಡುವುದಿಲ್ಲ, ಕೆಟ್ಟದ್ದಾಯಿತು ಎಂದು ಕುಸಿಯುವುದಿಲ್ಲ. ಈತ ದುಃಖಕಾರಕವಾದ ಕರ್ಮವನ್ನು ದ್ವೇಷಿಸುವುದೂ ಇಲ್ಲ. ಔಷಧಿ ಹೇಗೆ ಕಹಿ ಇರುತ್ತದೋ ಹಾಗೇ ಸತ್ಕರ್ಮ ಕಿಂಚಿತ್ ದುಃಖಕರವಾದಾಗ ಅದರ ಬಗ್ಗೆ ಆತ ಚಿಂತೆ ಮಾಡುವುದಿಲ್ಲ.
ಸಾತ್ವಿಕ ತ್ಯಾಗಿಯ ಮನಸ್ಸು ಸತ್ತ್ವಗುಣದಲ್ಲಿ ತುಂಬಿರುತ್ತದೆ. ಅವನಿಗೆ ತಾಮಸ-ರಾಜಸ ಚಿಂತೆಗಳೇ ಬರುವುದಿಲ್ಲ. ಬಲಜ್ಞಾನಗಳಿಂದ ಪರಿಪೂರ್ಣನಾದ ಭಗವಂತನಲ್ಲಿ ಎಲ್ಲವನ್ನೂ ಅರ್ಪಿಸಿ ಆತ ಕರ್ಮ

ಮಾಡುತ್ತಿರುತ್ತಾನೆ. ಇದರಿಂದ ಆತನ ಮನಸ್ಸು ಪೂರ್ಣವಾಗಿ ಭಗವಂತನಲ್ಲಿ ಸಮಾವಿಷ್ಟವಾಗಿರುತ್ತದೆ. ಮೇಧಾವಿಯಾಗಿರುವ ಈತನಿಗೆ ತನ್ನ ಬದುಕಿನ ಪ್ರತೀ ನಡೆಯ ಎಚ್ಚರವಿರುತ್ತದೆ. ಭಗವಂತನಲ್ಲಿ ನೆಲೆಗೊಂಡ ಇಂತವರ ಮನಸ್ಸಿಗೆ ಎಂದೂ ಯಾವ ಗೊಂದಲವೂ ಸುಳಿಯುವುದಿಲ್ಲ. ಇಂತವರ ಜೀವನದ ನಡೆ ನೋಡಲು ಸಾಮಾನ್ಯವಾಗಿರುತ್ತದೆ ಆದರೆ ಅವರ ಕ್ರಿಯೆಯ ಹಿಂದಿನ ಅನುಸಂಧಾನ ಮಾತ್ರ ಭಿನ್ನವಾಗಿರುತ್ತದೆ. ಇವರು "ಭಗವಂತ ನೀನು ಮಾಡಿಸುತಿದ್ದಿ-ನಾನು ಮಾಡುತ್ತಿದ್ದೇನೆ" ಎನ್ನುವ ಅನುಸಂಧಾನದಿಂದ ತಮ್ಮ ಕರ್ಮವನ್ನು ಮಾಡುತ್ತಿರುತ್ತಾರೆ.

ನಹಿ ದೇಹಭೃತಾ ಶಕ್ಯಂ ತ್ಯಕ್ತುಂ ಕರ್ಮಾಣ್ಯಶೇಷತಃ ।
ಯಸ್ತು ಕರ್ಮಫಲತ್ಯಾಗೀ ಸ ತ್ಯಾಗೀತ್ಯಭಿಧೀಯತೇ ॥೧೧॥

ನಹಿ ದೇಹಭೃತಾ ಶಕ್ಯಂ ತ್ಯಕ್ತುಂ ಕರ್ಮಾಣಿ ಅಶೇಷತಃ ।
ಯಃ ತು ಕರ್ಮ ಫಲ ತ್ಯಾಗೀ ಸಃ ತ್ಯಾಗೀ ಇತಿ ಅಭಿಧೀಯತೇ -ಶರೀರದಲ್ಲಿರುವಷ್ಟು ಕಾಲ ಕರ್ಮಗಳನ್ನು ಪೂರ್ತಿಯಾಗಿ ಬಿಡುವುದು ಸಾಧ್ಯವಿಲ್ಲ. ಕರ್ಮದ ಫಲವನ್ನು ತೊರೆದವನೇ ಕರ್ಮತ್ಯಾಗಿ.

ಮನುಷ್ಯನಾಗಿ ಹುಟ್ಟಿದ ಮೇಲೆ, ಹುಟ್ಟಿನಿಂದ ಸಾಯುವ ತನಕ ನಾವು ಕರ್ಮ ಮಾಡಲೇ ಬೇಕು. ಕರ್ಮವನ್ನೇ ಬಿಟ್ಟು ಬದುಕಲು ಸಾಧ್ಯವಿಲ್ಲ. ನಾವು ತೊರೆಯಬೇಕಾದದ್ದು ಕರ್ಮವನ್ನಲ್ಲ-ಕರ್ಮಫಲವನ್ನು. ಈ ರೀತಿ ಕರ್ಮ ಮಾಡಿಕೊಂಡು ಕರ್ಮಫಲ ತೊರೆದವನು ಕರ್ಮತ್ಯಾಗಿ ಎನಿಸುತ್ತಾನೆ.

ಅನಿಷ್ಟಮಿಷ್ಟಂ ಮಿಶ್ರಂ ಚ ತ್ರಿವಿಧಂ ಕರ್ಮಣಃ ಫಲಮ್ ।
ಭವತ್ಯತ್ಯಾಗಿನಾಂ ಪ್ರೇತ್ಯ ನತು ಸಂನ್ಯಾಸಿನಾಂ ಕ್ವಚಿತ್ ॥೧೨॥

ಅನಿಷ್ಟಮ್ ಇಷ್ಟಂ ಮಿಶ್ರಂ ಚ ತ್ರಿವಿಧಂ ಕರ್ಮಣಃ ಫಲಮ್ ।
ಭವತಿ ಅತ್ಯಾಗಿನಾಂ ಪ್ರೇತ್ಯ ನತು ಸಂನ್ಯಾಸಿನಾಂ ಕ್ವಚಿತ್ – ಕರ್ಮದ ಫಲ ಮೂರು ತೆರ: ಬೇಕಾದ್ದು, ಬೇಡವಾದದ್ದು, ಮತ್ತು ಎರಡರ ಬೆರಕೆ. ಫಲತ್ಯಾಗ ಮಾಡದವರಿಗೆ ಇದು ಸತ್ತಮೇಲೆ ಸಲ್ಲುತ್ತದೆ. ಫಲದ ನಂಟು ತೊರೆದವರಿಗೆ ಇದು ಎಂದೂ ಸೋಕುವುದಿಲ್ಲ.

ಕರ್ಮ ಮಾಡುವುದರಿಂದ ಸುಖವಾಗಬಹುದು; ದುಃಖವಾಗಬಹುದು; ಅಥವಾ ಸುಖ-ದುಃಖದ ಬೆರಕೆಯ ಫಲ ಸಿಗಬಹುದು. ಕರ್ಮಫಲ ತ್ಯಾಗ ಮಾಡದೇ ಕರ್ಮ ಮಾಡುವವರಿಗೆ ಇದು ಸತ್ತ ಮೇಲೆ ಸಲ್ಲುತ್ತದೆ. ಇವರು ಕರ್ಮ ಮತ್ತು ಕರ್ಮ ಫಲದ ಸುಳಿಯಲ್ಲಿ ಸಿಲುಕಿ ಮತ್ತೆ ಸಂಸಾರ ಬಂಧದಲ್ಲಿ ಸಿಲುಕುತ್ತಾರೆ. ಆದರೆ ಕರ್ಮ ಫಲದ ಅಪೇಕ್ಷೆ ಇಲ್ಲದವರಿಗೆ ಇದು ಎಂದೂ ಸೋಕುವುದಿಲ್ಲ. ಅವರಿಗೆ ಏನು ಬಂದರೂ ಅದು ಭಗವಂತನ ಪ್ರಸಾದ. ಅದರಲ್ಲಿ ಬೇಕಾದ್ದು, ಬೇಡವಾದದ್ದು ಎನ್ನುವ ಭೇದವಿಲ್ಲ. ಇದು ಮೋಕ್ಷ ಮಾರ್ಗ. ಉದಾಹರಣೆಗೆ ರಾಜ್ಯದ, ಅಧಿಕಾರದ ಆಸೆಯಿಂದ, ಭಗವಂತನನ್ನು ಮರೆತು ಯುದ್ಧವನ್ನು ಮಾಡುವವ- ಯುದ್ಧದಲ್ಲಿ ನಡೆಯುವ

ಪ್ರಾಣಹಾನಿಗೆ ಕಾರಣನಾಗುತ್ತಾನೆ. ಆತ ಈ ಪಾಪದ ಹೊರೆಯನ್ನು ಸತ್ತ ನಂತರ ಪಡೆಯಬೇಕಾಗುತ್ತದೆ. ಆದರೆ ಕರ್ತವ್ಯ ಕಾರಣಕ್ಕಾಗಿ ಯಾವುದೇ ಸ್ವಾರ್ಥವಿಲ್ಲದೆ ಎಲ್ಲವನ್ನೂ ಭಗವಂತನಿಗೆ ಅರ್ಪಿಸಿ ಯುದ್ಧ ಮಾಡುವವನಿಗೆ ಯಾವ ಪಾಪದ ಲೇಪವೂ ಅಂಟುವುದಿಲ್ಲ.

ಪಂಚೈತಾನಿ ಮಹಾಬಾಹೋ ಕಾರಣಾನಿ ನಿಬೋಧ ಮೇ ।
ಸಾಂಖ್ಯೇ ಕೃತಾಂತೇ ಪ್ರೋಕ್ತಾನಿ ಸಿದ್ಧಯೇ ಸರ್ವಕರ್ಮಣಾಮ್॥೧೩॥

ಪಂಚ ಏತಾನಿ ಮಹಾಬಾಹೋ ಕಾರಣಾನಿ ನಿಬೋಧ ಮೇ ।
ಸಾಂಖ್ಯೇ ಕೃತ ಅಂತೇ ಪ್ರೋಕ್ತಾನಿ ಸಿದ್ಧಯೇ ಸರ್ವ ಕರ್ಮಣಾಮ್ –ಎಲ್ಲಾ ಕಾರ್ಯಗಳು ಕೈಗೂಡಲು ಇವು ಐದು ಕಾರಣಗಳು. ಹೇ ಮಹಾಬಾಹೋ, ವೈದಿಕ ಜ್ಞಾನದ ಸಿದ್ಧಾಂತದಲ್ಲಿ ಹೇಳಲಾದ ಅವುಗಳನ್ನು ನನ್ನಿಂದ ತಿಳಿದುಕೋ :

ನಮ್ಮಲ್ಲಿ ಅನೇಕರಿಗೆ ಒಂದು ಪ್ರಶ್ನೆ ಇದೆ. ನಾವು ಮಾಡಿದ ಕೆಲಸವನ್ನು 'ನಾನು ಮಾಡಿದೆ' ಅನ್ನುವುದರಲ್ಲಿ ತಪ್ಪೇನು' ಎಂದು. ಈ ಪ್ರಶ್ನೆಗೆ ನಾವು ಉತ್ತರ ಕಂಡುಕೊಳ್ಳಬೇಕಾದರೆ, ಒಂದು ಕ್ರಿಯೆ ನಡೆಯಬೇಕಾದರೆ ಆ ಕ್ರಿಯೆಯ ಹಿಂದೆ ಇರುವ ಐದು ಕಾರಣಗಳನ್ನು ತಿಳಿದುಕೊಳ್ಳಬೇಕು. ವೈದಿಕ ಸಾಂಖ್ಯ ಶಾಸ್ತ್ರದಲ್ಲಿ, ಜ್ಞಾನದ ಸಿದ್ಧಾಂತದಲ್ಲಿ ಹೇಳಲಾದ ಈ ಐದು ಕಾರಣಗಳನ್ನು ಕೃಷ್ಣ ಅರ್ಜುನನಿಗೆ ವಿವರಿಸುತ್ತಾನೆ.
ಇಲ್ಲಿ ಕೃಷ್ಣ ಅರ್ಜುನನನ್ನು ಮಹಾಬಾಹೋ ಎಂದು ಸಂಬೋಧಿಸಿದ್ದಾನೆ. 'ಮಹಾ-ಬ' ಅಂದರೆ ಮಹತ್ತಾದ ಬಯಕೆಗಳು. ಅದನ್ನು ತ್ಯಾಗ ಮಾಡಿದವ-ಮಹಾಬಾಹು. ನಾವೆಲ್ಲರೂ ನಮ್ಮ ಜೀವನದಲ್ಲಿ ಕರ್ಮಫಲತ್ಯಾಗ ಮಾಡಿ, ಕೇವಲ ಭಗವದರ್ಪಣಾ ಭಾವದಿಂದ ಕರ್ಮ ಮಾಡುವುದನ್ನು ಕಲಿತುಕೊಂಡು- ಮಹಾಬಾಹುಗಳಾಗಬೇಕು ಎನ್ನುವುದು ಈ ಸಂಬೋಧನೆಯ ಹಿಂದಿರುವ ಧ್ವನಿ.

ಅಧಿಷ್ಠಾನಂ ತಥಾ ಕರ್ತಾ ಕರಣಂ ಚ ಪೃಥಗ್ ವಿಧಮ್ ।
ವಿವಿಧಾಶ್ಚ ಪೃಥಕ್ ಚೇಷ್ಟಾ ದೈವಂ ಚೈವಾತ್ರ ಪಂಚಮಮ್ ॥೧೪॥

ಅಧಿಷ್ಠಾನಂ ತಥಾ ಕರ್ತಾ ಕರಣಂ ಚ ಪೃಥಗ್ ವಿಧಮ್ ।
ವಿವಿಧಾಃ ಚ ಪೃಥಕ್ ಚೇಷ್ಟಾಃ ದೈವಂ ಚ ಏವ ಅತ್ರ ಪಂಚಮಮ್ – ಕ್ರಿಯೆ ನಡೆಯುವ ತಾಣ, ಮಾಡುವ ಭಗವಂತ [ಜೀವ], ಬೇರೆಬೇರೆ ಉಪಕರಣಗಳು, ಬಗೆಬಗೆಯ ಪೂರಕ ಕ್ರಿಯೆಗಳು ಮತ್ತು ಐದನೆಯದಾದ ಅದೃಷ್ಟ[ಭಗವಂತ].

ಪ್ರತಿಯೊಂದು ಕ್ರಿಯೆ ನಡೆಯಲು ಐದು ಕಾರಣಗಳು:

**(೧) ಅಧಿಷ್ಠಾನ: ಇಲ್ಲಿ ಅಧಿಷ್ಠಾನ ಎಂದರೆ ನೆಲೆ. ನಮ್ಮ ದೇಹವೇ ನಮ್ಮ ಅಧಿಷ್ಠಾನ. ಈ ಸಾಧನಾ ಶರೀರವಿಲ್ಲದೆ ಯಾವ ಕ್ರಿಯೆಯೂ ನಡೆಯುವುದಿಲ್ಲ. ನಿನಗೆ ದೊರೆತಿರುವ ಸಾಧನಾ ಶರೀರ ಆ ಭಗವಂತನ ಪ್ರಸಾದ.**

**(೨) ಕರ್ತಾ: ಶರೀರದಲ್ಲಿ ಕೂತು ನಮ್ಮ ಕ್ರಿಯೆಗಳನ್ನು ನಿಯಂತ್ರಿಸುವ ಭಗವಂತ ಕರ್ತಾ. ಆತ ಸ್ವತಂತ್ರ. ಆತನಿಗೆ ಅಧೀನವಾಗಿರುವ ಜೀವ(ನಾನು-Self) ಸ್ವತಂತ್ರನಲ್ಲ. ಆದರೆ ಜೀವನಿಗೆ ಇಚ್ಛಾಪೂರ್ವಕ ಕೃತಿ ಇದೆ.**

**(೩) ಕರಣಗಳು: ನಮ್ಮ ಇಂದ್ರಿಯಗಳು. ನಮ್ಮ ಇಂದ್ರಿಯಗಳನ್ನು ದೇವತೆಗಳು ನಿಯಂತ್ರಿಸುತ್ತಾರೆ. ಇಂದ್ರಿಯಗಳ ಒಡೆಯ ಭಗವಂತ(ಹೃಷೀಕೇಶ). ಇಂದ್ರಿಯಗಳು ನಮಗೆ ಭಗವಂತನ ಮಹಾ ಪ್ರಸಾದ.**

**(೪) ವಿವಿಧ ಪೂರಕ ಸಾಧನಗಳು: ಒಂದು ಕ್ರಿಯೆ ಆಗಬೇಕಾದರೆ ಅದಕ್ಕೆ ಪೂರಕವಾದ ಅನೇಕ ಪೂರಕ ಸಾಧನಗಳು ಅಗತ್ಯ.**

**(೫) ದೈವಂ: ನಮ್ಮ ಪ್ರತಿಯೊಂದು ಕ್ರಿಯೆ ಭಗವಂತನ ಸಂಕಲ್ಪವನ್ನು ಅವಲಂಭಿಸಿದೆ. ಇದನ್ನು ಅದೃಷ್ಟ, ಹಣೆಬರಹ ಎಂದೂ ಕರೆಯಬಹುದು.**

**ಈ ಮೇಲಿನ ವಿಷಯವನ್ನು ಉದಾಹರಣೆಯೊಂದಿಗೆ ನೋಡುವುದಾದರೆ- ಒಬ್ಬ ಅತ್ಯುತ್ತಮ ಮಾತುಗಾರ. ಆತ ಅಷ್ಟೊಂದು ಸ್ವಾರಸ್ಯವಾಗಿ, ವಿಷಯಗರ್ಭಿತವಾಗಿ ಮಾತನಾಡುತ್ತಾನೆ. ಆತ ಹೀಗೆ ಮಾತನಾಡಬೇಕಾದರೆ ಆತ ಮೂಗನಾಗಿರಬಾರದು, ಬಾಯಿ ಇದ್ದರೆ ಸಾಲದು-ಬಾಯಿಯಲ್ಲಿ ಶಬ್ದ ಬರಬೇಕು. ಕೇವಲ ಶಬ್ದವಲ್ಲ-ಯಾವ ಮಾತನಾಡಬೇಕೋ ಅದಕ್ಕನುಗುಣವಾದ ಶಬ್ದ ಬರಬೇಕು. ಆ ಶಬ್ದ ಬರಬೇಕಾದರೆ ಮಾತಿಗೆ ಒಂದು ಭಾವ ಬೇಕು. ಭಾವ ಅನ್ನುವುದು ಮನಸ್ಸಿನಲ್ಲಿ ಹೊಳೆಯಬೇಕು, ಹೊಳೆದ ಭಾವಕ್ಕೆ ತಕ್ಕಂತೆ ಶಬ್ದ ಬರಬೇಕು, ಆ ಶಬ್ದ ಬಾಯಿಯಲ್ಲಿ ಸ್ಫುಟವಾಗಿ ಹೊರ ಹೊಮ್ಮಬೇಕು. ಭಾವನೆಯಿಂದ ಶಬ್ದದ ಹುಟ್ಟಿಗೆ ಆಕಾಶ-ಗಾಳಿ ಮಾಧ್ಯಮ. ಈ ಎಲ್ಲಾ ಕ್ರಿಯೆ ಸುಸೂತ್ರವಾಗಿ ನಡೆದರೆ ಮಾತ್ರ ಆತ ಚೆನ್ನಾಗಿ ಮಾತನಾಡಬಲ್ಲ. ಮನಸ್ಸಿನಲ್ಲಿ ಭಾವ ಮತ್ತು ಶಬ್ದವನ್ನು ಹೊಳೆಸುವವನು ಯಾರು? ಒಂದು ವೇಳೆ ಹೇಳಬೇಕು ಅನ್ನುವ ವಿಷಯಕ್ಕೆ ಅನುಗುಣವಾದ ಶಬ್ದ ಹೊಳೆಯದೇ ಇದ್ದರೆ? ನಮ್ಮ ಮೆದುಳಿನಲ್ಲಿ ಯಾವುದೋ ಒಂದು ಗುಂಡಿ ಆ ಕ್ಷಣದಲ್ಲಿ ಕೆಲಸ ಮಾಡದೆ ಇದ್ದರೆ? ಹುಟ್ಟುವಾಗಲೇ ಮೂಗನಾಗಿ ಹುಟ್ಟಿದ್ದರೆ? ಜ್ಞಾನ ಪರಂಪರೆಯೇ ಇಲ್ಲದ ಮನೆತನದಲ್ಲಿ ಹುಟ್ಟಿದ್ದರೆ? ಇಲ್ಲಿ ನಮ್ಮ ಕೈವಾಡ ಏನಿದೆ? ಇದು ತಿಳಿದಾಗ 'ನಾನು ಮಾಡಿದೆ' ಎನ್ನುವ ಅಹಂಕಾರ ಬಾರದು. ಈ ಅರಿವಿದ್ದಾಗ ಎಲ್ಲರೊಡನೆ ಎಲ್ಲರಂತೆ ಇದ್ದು ಅಂಟಿಸಿಕೊಳ್ಳದೇ ಇರಲು ಸಾಧ್ಯ.**

**ಶರೀರವಾಙ್ಮನೋಭಿರ್ಯತ್ ಕರ್ಮ ಪ್ರಾರಭತೇ ನರಃ ।**
**ನ್ಯಾಯ್ಯಂ ವಾ ವಿಪರೀತಂ ವಾ ಪಂಚೈತೇ ತಸ್ಯ ಹೇತವಃ ॥೧೫॥**

**ಶರೀರ ವಾಕ್ ಮನೋಭಿಃ ಯತ್ ಕರ್ಮ ಪ್ರಾರಭತೇ ನರಃ ।**
**ನ್ಯಾಯ್ಯಂ ವಾ ವಿಪರೀತಂ ವಾ ಪಂಚ ಏತೇ ತಸ್ಯ ಹೇತವಃ – ಮೈ-ಮಾತು-ಮನಗಳಿಂದ ಮನುಷ್ಯ ಯಾವ ಕೆಲಸ ಕೈಗೊಂಡರೂ –ಅದು ಒಪ್ಪಿರಲಿ, ತಪ್ಪಿರಲಿ-ಇವು ಐದು ಅದಕ್ಕೆ ಕಾರಣಗಳು.**

ಮೈ-ಮಾತು-ಮನಗಳಿಂದ ನಾವು ಯಾವ ಕ್ರಿಯೆ ಮಾಡಿದರೂ ಅದರ ಹಿಂದೆ ಮೇಲೆ ಹೇಳಿದ ಐದು ಕಾರಣಗಳಿರುತ್ತವೆ. ಆ ಕ್ರಿಯೆ ಒಳ್ಳೆಯದಿರಬಹುದು ಅಥವಾ ಕೆಟ್ಟದ್ದಿರಬಹುದು. ಕ್ರಿಯೆ ಮಾತ್ರ ಈ ಐದು ಕಾರಣಗಳಿಂದಲೇ ನಡೆಯುವುದು.

ತತ್ರೈವಂ ಸತಿ ಕರ್ತಾರಮಾತ್ಮಾನಂ ಕೇವಲಂ ತು ಯಃ ।
ಪಶ್ಯತ್ಯಕೃತಬುದ್ಧಿತ್ವಾನ್ನ ಸ ಪಶ್ಯತಿ ದುರ್ಮತಿಃ ॥೧೬॥

ತತ್ರ ಏವಂ ಸತಿ ಕರ್ತಾರಮ್ ಆತ್ಮಾನಂ ಕೇವಲಂ ತು ಯಃ।
ಪಶ್ಯತಿ ಅಕೃತ ಬುದ್ಧಿತ್ವಾತ್ ನ ಸಃ ಪಶ್ಯತಿ ದುರ್ಮತಿಃ -ಅದು ಹೀಗಿರುವಾಗ, ಏನೂ ಮಾಡದ ತನ್ನನ್ನು 'ಮಾಡುವವನು' ಎಂದು [ತಾನೊಬ್ಬನೇ ಎಲ್ಲಾ ಮಾಡಿದವನು ಎಂದು] ತಿಳಿದವನು ಬುದ್ಧಿಗೇಡಿ. ಆ ತಿಳಿಗೇಡಿಗಳಿಗೆ ಏನೂ ತಿಳಿದಿಲ್ಲ.

ಈ ರೀತಿ ಐದು ಕಾರಣಗಳು ನಮ್ಮ ಕ್ರಿಯೆಯಲ್ಲಿ ಪಾತ್ರಧಾರಿಗಳಾಗಿರುವಾಗ, ಅದನ್ನು ಅರಿಯದೇ, "ನಾನು ಮಾಡಿದೆ" ಎಂದು ಅಹಂಕಾರ ಪಟ್ಟುಕೊಳ್ಳುವುದು ಅರ್ಥಶೂನ್ಯ. ಈ ರೀತಿ ತಿಳಿದುಕೊಳ್ಳುವವರು ಬುದ್ಧಿಗೇಡಿಗಳು. ಇಂತಹ ಮತಿಗೇಡಿಗಳು ಏನನ್ನೂ ತಿಳಿದಿಲ್ಲ.

ಯಸ್ಯ ನಾಹಂಕೃತೋ ಭಾವೋ ಬುದ್ಧಿರ್ಯಸ್ಯ ನ ಲಿಪ್ಯತೇ ।
ಹತ್ವಾಽಪಿ ಸ ಇಮಾನ್ ಲೋಕಾನ್ ನ ಹಂತಿ ನ ನಿಬಧ್ಯತೇ ॥೧೭॥

ಯಸ್ಯ ನ ಅಹಂಕೃತಃ ಭಾವಃ ಬುದ್ಧಿಃ ಯಸ್ಯ ನ ಲಿಪ್ಯತೇ ।
ಹತ್ವಾ ಅಪಿ ಸ ಇಮಾನ್ ಲೋಕಾನ್ ನ ಹಂತಿ ನ ನಿಬಧ್ಯತೇ – ನಾನು ಮಾಡಿದೆ ಎಂಬ ಹಮ್ಮಿರದವನು, ಬಗೆಯಲ್ಲಿ ಫಲದ ನಂಟಿರದವನು, ಈ ಮಂದಿಯನ್ನೆಲ್ಲಾ ಕೊಂದರೂ ಯಾರನ್ನೂ ಕೊಲ್ಲುವುದಿಲ್ಲ. ಕರ್ಮದ ಸೆರೆ ಅವನನ್ನು ಸೋಕದು.

ಕರ್ಮಫಲದ ತ್ಯಾಗ ಮಾಡಿದವ ಯಾವ ಕರ್ಮ ಮಾಡಿದರೂ ಅದು ಅವನಿಗೆ ಬಾಧಕವಾಗುವುದಿಲ್ಲ. ನಾವು 'ನನ್ನಿಂದಾಯಿತು' ಎಂದು ಅಂಟಿಸಿಕೊಳ್ಳದೆ, ಯಾವುದೇ ಫಲಾಪೇಕ್ಷೆ ಇಲ್ಲದೆ, ಕರ್ಮ ಮಾಡಿದಾಗ-ಆ ಕರ್ಮದ ಫಲ ಎಂದೂ ನಮ್ಮನ್ನು ಬಾಧಿಸುವುದಿಲ್ಲ. ನಾವು ಮಹಾಭಾರತ ಯುದ್ಧದ ಸನ್ನಿವೇಶವನ್ನು ನೋಡಿದರೆ-ಪಾಂಡವರಿಗೆ ಯುದ್ಧ ಅನಿವಾರ್ಯವಾಗಿ ಒದಗಿಬಂದಿರುವುದು. ಅವರು ಎಂದೂ ಯುದ್ಧವಾಗಬೇಕು ಎಂದು ಬಯಸಿಲ್ಲ; ಯುದ್ಧದಲ್ಲಿ ಗೆದ್ದು ಅಧಿಕಾರ ಪಡೆಯಬೇಕು ಎಂತಲೂ ಯೋಚಿಸಿಲ್ಲ. ಆದರೆ ಅವರಿಗೆ ಅನಿವಾರ್ಯವಾಗಿ ಯುದ್ಧಮಾಡುವ ಸನ್ನಿವೇಶ ಎದುರಿಗೆ ಬಂದು ನಿಂತಿತು. ಅವರು ಅದನ್ನು 'ಇದು ದೈವೇಚ್ಛೆ' ಎಂದು ಯುದ್ಧದ ಪರಿಣಾಮದ ಬಗ್ಗೆ ಯೋಚಿಸದೆ ಭಗವದರ್ಪಣಾ ಭಾವದಿಂದ ಮಾಡಿದರು. ಈ ರೀತಿ ಒದಗಿ

ಬಂದ ಯುದ್ಧದಲ್ಲಿ ಅವರು ಅನೇಕಾನೇಕ ಯೋಧರನ್ನು ಕೊಲ್ಲಬೇಕಾಯಿತು. ಆದರೆ ಅವರು ತಮ್ಮ ಕರ್ತವ್ಯ ಕರ್ಮವನ್ನು ಫಲಾಪೇಕ್ಷೆ, ಅಹಂಕಾರವಿಲ್ಲದೆ ಮಾಡಿದರು. ಈ ರೀತಿ "ನಿರ್ಲಿಪ್ತ ಮನಸ್ಸಿನಿಂದ ಯುದ್ಧ ಭೂಮಿಯಲ್ಲಿ ಅನೇಕ ಜನರನ್ನು ಕೊಲ್ಲುವ ಪ್ರಸಂಗ ಬಂದರೂ ಕೂಡಾ-ಆ ಕೊಂದ ಪಾಪ ಕೊಂದವನನ್ನು ಸೋಕುವುದಿಲ್ಲ" ಎನ್ನುತ್ತಾನೆ ಕೃಷ್ಣ. ಆದರೆ ಇಲ್ಲಿ ಬಹಳ ಮುಖ್ಯ ವಿಚಾರ ಎಂದರೆ-ಮಾನಸಿಕವಾಗಿ ಒಂದು ಕ್ಷಣವೂ ನಮಗೆ ಭಗವಂತನ ಮೇಲೆ ಅಪನಂಬಿಕೆ ಬರಕೂಡಾದು; ಸಂಪೂರ್ಣ ಅರ್ಪಣಾ ಭಾವದಲ್ಲಿ, ನಿಶ್ಚಿತಾಭಿಪ್ರಾಯದಲ್ಲಿ(**Conviction**) ನಮ್ಮ ಪಾಲಿಗೆ ಒದಗಿ ಬಂದಿರುವ ಕರ್ಮವನ್ನು ಫಲಾಪೇಕ್ಷೆ ಇಲ್ಲದೆ ಮಾಡಬೇಕು. ಭಗವಂತನ ಕೈಯಲ್ಲಿ ನಾನು ಒಂದು ಸಾಧನ(**Instrument**)ಎನ್ನುವ ಎಚ್ಚರದಿಂದ ಎಲ್ಲವನ್ನು ಭಗವಂತನ ಚರಣಗಳಿಗೆ ಅರ್ಪಿಸಿ ಕರ್ಮವನ್ನು ಮಾಡಿದಾಗ ಕರ್ಮದ ಸೆರೆ ನಮ್ಮನ್ನು ಸೋಕುವುದಿಲ್ಲ. ಜೀವನಿಗೆ ಕರ್ಮದ ಫಲ ತಟ್ಟುವುದೇ ಅವನು 'ನಾನು ಮಾಡಿದೆ' ಎಂದು ತಿಳಿದುಕೊಳ್ಳುವುದರಿಂದ.

ಇಲ್ಲಿ ನಮಗೆ ಒಂದು ಪ್ರಶ್ನೆ ಮೂಡಬಹುದು. ಜೀವನಿಗೆ ಸ್ವತಂತ್ರ ಕರ್ತೃತ್ವ ಇಲ್ಲ, ಕರ್ಮ ಭಗವದಿಚ್ಛೆಯಂತೆ ನಡೆಯುತ್ತದೆ. ಹೀಗಿರುವಾಗ ಜೀವನಿಗೆ ವಿಧಿನಿಷೇಧ ಏಕೆ? ಶಾಸ್ತ್ರ ಏಕೆ ಅದನ್ನು ಮಾಡು, ಇದನ್ನು ಮಾಡಬೇಡ ಎಂದು ಹೇಳುತ್ತದೆ? ಈ ಪ್ರಶ್ನೆಗೆ ಕೃಷ್ಣ ಮುಂದಿನ ಶ್ಲೋಕದಲ್ಲಿ ಉತ್ತರಿಸಿದ್ದಾನೆ.

ಜ್ಞಾನಂ ಜ್ಞೇಯಂ ಪರಿಜ್ಞಾತಾ ತ್ರಿವಿಧಾ ಕರ್ಮಚೋದನಾ ।
ಕರಣಂ ಕರ್ಮ ಕರ್ತೇತಿ ತ್ರಿವಿಧಃ ಕರ್ಮಸಂಗ್ರಹಃ ॥೧೮॥

ಜ್ಞಾನಂ ಜ್ಞೇಯಂ ಪರಿಜ್ಞಾತಾ ತ್ರಿವಿಧಾ ಕರ್ಮ ಚೋದನಾ ।
ಕರಣಂ ಕರ್ಮ ಕರ್ತಾ ಇತಿ ತ್ರಿವಿಧಃ ಕರ್ಮಸಂಗ್ರಹಃ –ಕರ್ಮ ವಿಧಿಯ ಉದ್ದೇಶ ಮೂರು: ಮಾಡಬೇಕೆಂಬ ಅರಿವು, ಅದಕ್ಕಾಗಿ ಅರಿಯಬೇಕಾದ ಕರ್ಮ,ಕರ್ಮಫಲ ಮತ್ತು ಅರಿತು ಮಾಡುವವನು. [ಕರ್ಮಕ್ಕೆ ಕಾರಣವಾದ ಭಗವಂತನ ಪ್ರೇರಣೆ ಅವನ ಸ್ವರೂಪವೇ. ಆದ್ದರಿಂದ ಮುಮ್ಮುಖವಾದ ಅದು ಅರಿವಿನ ರೂಪ, ಎಲ್ಲರೂ ಅರಿಯಬೇಕಾದಂತಹದ್ದು ಮತ್ತು ಎಲ್ಲವನ್ನೂ ಬಲ್ಲುದು] ಕರ್ಮದ ಕಾರಣವೂ ಅಡಕವಾಗಿ ಮೂರು ತೆರ: ಉಪಕರಣ, ಮಾಡುವಿಕೆ ಮತ್ತು ಮಾಡುವವನು.

ವಿಧಿನಿಷೇಧ ಇರುವುದು ನಮ್ಮ ಜ್ಞಾನಕ್ಕಾಗಿ. "ಭಗವಂತನನ್ನು 'ನಾನು' ತಿಳಿದುಕೊಳ್ಳಬೇಕು" ಎನ್ನುವುದಕ್ಕಾಗಿ ಕರ್ಮದ ವಿಧಿನಿಷೇಧ. ಕರ್ಮ ಮಾಡುವುದು ಕರ್ಮಕ್ಕಾಗಿ ಅಲ್ಲ-ಜ್ಞಾನಕ್ಕಾಗಿ. ಕರ್ಮದ ವಿಧಾನದ ಹಿಂದಿರುವುದು ಕಾರುಣ್ಯ. ಜ್ಞಾನವಿಲ್ಲದ ಲೋಕಕ್ಕೆ ಭಗವಂತನ ಜ್ಞಾನ-ಆ ಜ್ಞಾನಕ್ಕೆ ಪೂರಕವಾಗಿ ಕರ್ಮ. ಕರ್ಮದ ಹಿಂದಿರುವ ಪ್ರೇರಣೆ ಮೂರು: ಜ್ಞಾನ, ಜ್ಞೇಯ ಮತ್ತು ಜ್ಞಾತಾ. ಒಂದು ಕ್ರಿಯೆಯನ್ನು ಮಾಡಬೇಕು ಅನ್ನುವ ಅರಿವು; ಆ ಕ್ರಿಯೆಯನ್ನು ಮಾಡಲು ಅರಿಯಬೇಕಾದ ಕರ್ಮ; ಮತ್ತು ಕರ್ಮವನ್ನು ಅರಿತು ಕರ್ಮವನ್ನು ಮಾಡುವವನು. ಭಗವಂತನನ್ನು ತಿಳಿದುಕೊಳ್ಳಬೇಕು ಎನ್ನುವುದು ಕರ್ಮದ ಹಿಂದಿನ ಮೂಲಪ್ರೇರಣೆ. ಕರ್ಮ ಮಾಡುವುದು ನಮ್ಮ ತಿಳಿಗೇಡಿತನವನ್ನು ಕಳಚಿಕೊಂಡು ಜ್ಞಾನವನ್ನು ಪಡೆಯುವುದಕ್ಕೋಸ್ಕರ; ನಮ್ಮ ಅರಿವನ್ನು

ಬೆಳೆಸುವುದಕ್ಕೋಸ್ಕರ; ಆ ಅರಿವು ಭಗವನ್ಮುಖವಾಗುವುದಕ್ಕೋಸ್ಕರ. ನಾವು ಅರಿವುಳ್ಳವರಾಗುವುದಕ್ಕೋಸ್ಕರವೇ ಕರ್ಮವಿಧಿನಿಷೇಧ ಶಾಸ್ತ್ರಕಾರರಿಂದ ಬಂತು.

ಜೀವನಿಗೆ ಕರ್ಮ ಮಾಡಬೇಕು ಎನ್ನುವ ಪ್ರೇರಣೆ ಮಾಡುವವ-ಭಗವಂತ. ಅದಕ್ಕನುಗುಣವಾಗಿಯೇ ಜೀವ ಕರ್ಮ ಮಾಡುತ್ತಾನೆ. ಯಾವ ಜೀವ ಏನು ಆಗಬೇಕು ಎನ್ನುವುದು ಆ ಜೀವದ ಸ್ವರೂಪಕ್ಕೆ ಸಂಬಂಧಪಟ್ಟ ವಿಚಾರ. ಆದರೆ ಸ್ವಯಂ ಜೀವನಿಗೆ ಅದನ್ನು ಅಭಿವ್ಯಕ್ತಗೊಳಿಸುವ ಶಕ್ತಿ ಇಲ್ಲ. ಭಗವಂತ ಆ ಜೀವ ಸ್ವರೂಪದ ಯೋಗ್ಯತೆಗನುಗುಣವಾಗಿ ಆತನಲ್ಲಿ ಪ್ರೇರಣೆ ಮಾಡುತ್ತಾನೆ. ಭಗವಂತನ ಪ್ರೇರಣೆಯಿಂದ ಜೀವಯೋಗ್ಯತೆ ವ್ಯಕ್ತವಾಗುತ್ತದೆ ಮತ್ತು ಅದಕ್ಕನುಗುಣವಾಗಿ ಜೀವ ಕರ್ಮದಲ್ಲಿ ತೊಡಗುತ್ತಾನೆ. ಇಲ್ಲಿ ಎಲ್ಲವೂ ಮೂಲತಃ ಭಗವದ್ ಸ್ವರೂಪ. ಭಗವಂತನ ಜ್ಞಾನ-ಭಗವದ್ ಸ್ವರೂಪ, ಭಗವಂತನ ಕ್ರಿಯೆ-ಭಗವದ್ ಸ್ವರೂಪ, ಭಗವಂತನ ಪ್ರೇರಣೆ-ಭಗವದ್ ಸ್ವರೂಪ. ಭಗವಂತನ ಸ್ವರೂಪ ನೇರ ನಮ್ಮ ಮೇಲೆ ಕೆಲಸ ಮಾಡುತ್ತಿರುತ್ತದೆ. ಅವನೇ ಜ್ಞಾನ, ಅವನೇ ಜ್ಞೇಯ, ಅವನೇ ಜ್ಞಾತೃ. ಆದ್ದರಿಂದ ಅವನ ಪ್ರೇರಣೆ-ಜ್ಞಾನಸ್ವರೂಪ; ಅವನ ಪ್ರೇರಣೆ-ಜ್ಞಾತೃಸ್ವರೂಪ; ಅವನ ಪ್ರೇರಣೆ-ಜ್ಞೇಯ. ಹೀಗೆ ಜ್ಞಾನಸ್ವರೂಪನಾದ ಭಗವಂತನ ಪ್ರೇರಣೆಯಿಂದ ಜೀವ ಕರ್ಮ ಮಾಡುತ್ತಾನೆ ಮತ್ತು ಎಲ್ಲವೂ ಅವನ ಅಧೀನವಾಗಿ ನಡೆಯುತ್ತದೆ.

ಒಟ್ಟಿನಲ್ಲಿ ಕರ್ಮದ ಕಾರಣಗಳನ್ನು ಅಡಕವಾಗಿ ಹೇಳಬೇಕೆಂದರೆ ಅವು ಮೂರು ವಿಧ: ದೇಹ ಇಂದ್ರಿಯಾದಿ ಉಪಕರಣಗಳು, ಮಾಡುವಿಕೆ(ಕರ್ಮ) ಮತ್ತು ಕರ್ತಾ(ಜೀವ,ಭಗವಂತ ಮತ್ತು ಅದೃಷ್ಟ).

ಗುಣತ್ರಯಗಳ ಬಗ್ಗೆ ಹಿಂದೆ ಸಾಕಷ್ಟು ವಿವರಗಳನ್ನು ಕೊಟ್ಟಿದ್ದ ಕೃಷ್ಣ, ಇಲ್ಲಿ ಜೀವನಕ್ಕೆ ಬಹಳ ಮುಖ್ಯವಾದ ತ್ರೈಗುಣ್ಯ ವಿದ್ಯೆಯನ್ನು ವಿವರಿಸಿದ್ದಾನೆ.

ಜ್ಞಾನಂ ಕರ್ಮ ಚ ಕರ್ತಾ ಚ ತ್ರಿಧೈವ ಗುಣಭೇದತಃ ।
ಪ್ರೋಚ್ಯತೇ ಗುಣಸಂಖ್ಯಾನೇ ಯಥಾವಚ್ಛೃಣು ತಾನ್ಯಪಿ ॥೧೯॥

ಜ್ಞಾನಂ ಕರ್ಮ ಚ ಕರ್ತಾ ಚ ತ್ರಿಧಾ ಏವ ಗುಣಭೇದತಃ ।
ಪ್ರೋಚ್ಯತೇ ಗುಣಸಂಖ್ಯಾನೇ ಯಥಾವತ್ ಶೃಣು ತಾನಿ ಅಪಿ – ಅರಿವು, ಕಾಯಕ ಮತ್ತು ಮಾಡುವಾತ ಕೂಡಾ ಗುಣಗಳ ಭೇದದಿಂದ ಮೂರು ತೆರ ಎಂದು ಗುಣಗಳ ಎಣಿಕೆಯ ಪ್ರಕರಣದಲ್ಲಿ [ವೈದಿಕ ಸಾಂಖ್ಯಾ ಶಾಸ್ತ್ರದಲ್ಲಿ] ಹೇಳಲಾಗಿದೆ. ಅವುಗಳನ್ನು ಹಾಗೆಯೇ ಆಲಿಸು.

ಪ್ರತಿಯೊಬ್ಬನ ಬದುಕಿನಲ್ಲಿರುವ ಮೂರು ಪ್ರಮುಖ ಘಟಕಗಳೆಂದರೆ ಅರಿವು(ಜ್ಞಾನ), ಕಾಯಕ(ಕರ್ಮ) ಮತ್ತು ಕರ್ತಾ(ಮಾಡುವಾತ). ಏನನ್ನೇ ಮಾಡುವುದಾದರೂ ಕೂಡಾ ಒಂದು ತಿಳುವಳಿಕೆಯಿಂದ ಮಾಡುತ್ತೇವೆ-ಅದು ಜ್ಞಾನ; ಆ ತಿಳುವಳಿಕೆಯಿಂದ 'ಮಾಡುವುದು'-ಕರ್ಮ; ಜ್ಞಾನ ಮತ್ತು ಕರ್ಮಗಳಿಗೆ ಆಶ್ರಿತನಾಗಿರತಕ್ಕಂತವ-ಕರ್ತಾ. ಈ ಮೂರೂ ಕೂಡಾ ಗುಣತ್ರಯ ವಿಭಾಗಕ್ಕೆ ಒಳಪಟ್ಟು ಪ್ರತಿಯೊಂದೂ ಮತ್ತೆ ಮೂರು ವಿಧವಾಗಿದೆ. ಶಾಸ್ತ್ರದಲ್ಲಿ ಎಲ್ಲಿ ಗುಣಗಳ ಪರಿಗಣನೆ ಆಗುತ್ತದೋ ಅಲ್ಲಿ ಈ ವಿಷಯ ಹೇಳಿದ್ದಾರೆ ಮತ್ತು ಭಗವಂತ ಕಪಿಲವಾಸುದೇವನಾಗಿ ಜಗತ್ತಿಗೆ ಕೊಟ್ಟ 'ಪರಮಸಾಂಖ್ಯದಲ್ಲಿ' ಇದನ್ನು ಹೇಳಲಾಗಿದೆ. ಇದು ಕಪಿಲ

ವಾಸುದೇವನಿಂದ ಮೊಟ್ಟಮೊದಲು ಹೇಳಲ್ಪಟ್ಟ, ಪುರಾತನ ಕಾಲದಿಂದಲೂ ಇದ್ದ, ಜಗತ್ತಿಗೆ ಹೇಳಬೇಕಾದ ವಿಷಯಗಳಲ್ಲೇ ಅತ್ಯಂತ ಪ್ರಕೃಷ್ಟವಾದ ವಿಷಯ. ತ್ರೈಗುಣ್ಯವಿಲ್ಲದೆ ಜೀವನವೇ ಇಲ್ಲ. ನಮ್ಮ ಬದುಕಿನ ಎಲ್ಲಾ ಮುಖದಲ್ಲೂ ವ್ಯಾಪಿಸಿರುವ ಈ ತ್ರೈಗುಣ್ಯವನ್ನು ನಾವು ಅರ್ಥಮಾಡಿಕೊಳ್ಳದಿದ್ದರೆ ನಮ್ಮ ಬದುಕನ್ನು ತಿದ್ದಿಕೊಳ್ಳಲು ಸಾಧ್ಯವಿಲ್ಲ ಮತ್ತು ತ್ರಿಗುಣಾತೀತ ಭಗವಂತನ ಕಡೆಗೆ ಸಾಗಲು ಸಾಧ್ಯವಿಲ್ಲ. "ಅತ್ಯಂತ ಪುರಾತನವಾದ ಈ ಮೂಲಭೂತ ಸತ್ಯವನ್ನು ನಾನು ನಿನಗೆ ತದ್ವತ್ತಾಗಿ ಹೇಳುತ್ತೇನೆ -ಅದನ್ನು ಗಮನವಿಟ್ಟು ಆಲಿಸು" ಎಂದು ಕೃಷ್ಣ ಅರ್ಜುನನಲ್ಲಿ ಹೇಳುತ್ತಾನೆ.

ಸರ್ವಭೂತೇಷು ಯೇನೈಕಂ ಭಾವಮವ್ಯಯಮೀಕ್ಷತೇ ।
ಅವಿಭಕ್ತಂ ವಿಭಕ್ತೇಷು ತಜ್ ಜ್ಞಾನಂ ವಿದ್ಧಿ ಸಾತ್ತ್ವಿಕಮ್ ॥೨೦॥

ಸರ್ವಭೂತೇಷು ಯೇನ ಏಕಂ ಭಾವಂ ಅವ್ಯಯಮ್ ಈಕ್ಷತೇ ।
ಅವಿಭಕ್ತಂ ವಿಭಕ್ತೇಷು ತತ್ ಜ್ಞಾನಂ ವಿದ್ಧಿ ಸಾತ್ತ್ವಿಕಮ್ – ಎಲ್ಲಾ ಜೀವಿಗಳಲ್ಲಿ ಬದಲಾಗದ ಒಂದು ಪರತತ್ವವನ್ನು, ಬಗೆಬಗೆಯ ವಸ್ತುಗಳಲ್ಲಿ ಒಂದೇ ಬಗೆಯ ಭಗವಂತನನ್ನು ಕಾಣುವ ತಿಳಿವು ಸಾತ್ವಿಕ ಎಂದು ತಿಳಿ.

ಬೃಹದಾರಣ್ಯಕ ಉಪನಿಷತ್ತಿನಲ್ಲಿ(೪-೫-೧೧)ಹೇಳುವಂತೆ: "ಅಸ್ಯ ಮಹತೋ ಭೂತಸ್ಯ ನಿಶ್ವಸಿತಮ್"- 'ಅಂದರೆ ಇಡೀ ಪ್ರಪಂಚ ಆ ಮಹಾಭೂತದ ಉಸಿರಿನ ಉದ್ಗಾರ'. ವಿಷ್ಣು ಸಹಸ್ರನಾಮದಲ್ಲಿ ಹೇಳುತ್ತಾರೆ: "ಏಕೋ ವಿಷ್ಣುರ್ಮಹದ್ಭೂತಂ ಪೃಥಗ್ಭೂತಾನ್ಯನೇಕಶಃ" ಎಂದು. ಅಂದರೆ ಒಬ್ಬನೇ ಒಬ್ಬ ವಿಷ್ಣು ಹಿರಿಯ ಚೇತನ(ಮಹಾಭೂತ); ಅಲ್ಪ ಚೇತನಗಳು(ಭೂತಗಳು) ಹಲವಾರು ಎಂದು. ಗೀತೆಯ ಈ ಶ್ಲೋಕದಲ್ಲಿ ಕೃಷ್ಣ ಸಾತ್ವಿಕ ಅರಿವಿನ ಬಗ್ಗೆ ಹೇಳುತ್ತಾ ಹೇಳುತ್ತಾನೆ: "ಪರಸ್ಪರ ಭಿನ್ನವಾದ, ಒಂದರಂತೆ ಇನ್ನೊಂದಿಲ್ಲದ, ವಿಲಕ್ಷಣವಾದ ಜೀವಪ್ರಪಂಚದಲ್ಲಿ(ಸರ್ವಭೂತೇಷು)- ಯಾವ ಭೇದವೂ ಇಲ್ಲದೆ, ಪೂರ್ಣ ಗುಣಕ್ರಿಯೆಯಲ್ಲಿ ಅಖಂಡ ಸತ್ಯವಾಗಿರುವ ಒಂದು ತತ್ವ ನೆಲೆಸಿದೆ. ಅನಂತದಲ್ಲಿ ಏಕವಾಗಿರುವ, ತ್ರೈಗುಣ್ಯವರ್ಜಿತ ಭಗವಂತನೆಂಬ ಈ ತತ್ವ ಯಾವ ಅರಿವಿಗೆ ಗೋಚರವಾಗುತ್ತದೋ ಆ ಅರಿವು ಸಾತ್ವಿಕ" ಎಂದು.

ಪೃಥಕ್ ತ್ವೇನ ತು ಯಜ್ ಜ್ಞಾನಂ ನಾನಾಭಾವಾನ್ ಪೃಥಗ್ ವಿಧಾನ್ ।
ವೇತ್ತಿ ಸರ್ವೇಷು ಭೂತೇಷು ತಜ್ ಜ್ಞಾನಂ ವಿದ್ಧಿ ರಾಜಸಮ್ ॥೨೧॥

ಪೃಥಕ್ ತ್ವೇನ ತು ಯತ್ ಜ್ಞಾನಂ ನಾನಾಭಾವಾನ್ ಪ್ರಥಗ್ ವಿಧಾನ್ ।
ವೇತ್ತಿ ಸರ್ವೇಷು ಭೂತೇಷು ತತ್ ಜ್ಞಾನಂ ವಿದ್ಧಿ ರಾಜಸಮ್ – ಭಗವಂತನ ಶಕ್ತಿಯಲ್ಲಿ ಅಂತರವನ್ನು ಕಾಣುವುದು, ಎಲ್ಲಾ ಜೀವಿಗಳಲ್ಲಿ ಬಗೆಬಗೆಯ ದೈವೀಶಕ್ತಿಗಳು ಬೇರೆಬೇರೆಯಾಗಿ ಕೆಲಸ ಮಾಡುತ್ತಿವೆ ಎಂದು ತಿಳಿಯುವುದು[ಎಲ್ಲಾ ಜೀವಿಗಳಲ್ಲಿರುವ ಭೇದವನ್ನು ಮಾತ್ರ ಗುರುತಿಸುವ, ಒಂದರಂತೆ ಒಂದಿಲ್ಲ ಎಂದರಿಯುವ, ಆದರೆ ಭಗವತ್ ಪ್ರಜ್ಞೆಯಿರದ ಕೇವಲ ಭೌತಿಕ ನಿಜದರಿವು] ರಾಜಸ ಎಂದು ತಿಳಿ.

ಏಕಭಕ್ತಿ ಇಲ್ಲದೆ ಅನೇಕ ದೇವತಾವಾದದಲ್ಲಿ ನಂಬಿಕೆ-ರಾಜಸ ಅರಿವು. ಇವರಿಗೆ ಅಖಂಡವಾದ ಪರತತ್ವದ ಎಚ್ಚರವಿರುವುದಿಲ್ಲ. ಇವರು ಬೇರೆ ಬೇರೆ ಸಂದರ್ಭದಲ್ಲಿ ಬೇರೆ ಬೇರೆ ದೇವತೆಗಳನ್ನು ಪೂಜೆ ಮಾಡುತ್ತಾರೆ. ಇಂದಿನ ಜ್ಯೋತಿಷ್ಯ ಕೂಡಾ ಜನರನ್ನು ಈ ತಪ್ಪು ದಾರಿಯಲ್ಲಿ ಹೋಗುವಂತೆ ಪ್ರೇರಣೆ ಮಾಡುತ್ತಿದೆ. ಅಖಂಡವಾದ ಭಗವಂತನ ಎಚ್ಚರವಿಲ್ಲದೆ ಒಂದೊಂದು ಗ್ರಹಚಾರಕ್ಕೆ ಒಂದೊಂದು ದೇವತೆಯಪೂಜೆ ಮಾಡುವುದು ರಾಜಸ ಅರಿವು. ಯಾವ ಪೂಜೆಯೇ ಇರಲಿ ಅದನ್ನು ಸರ್ವನಿಯಾಮಕ ಭಗವಂತನ ಎಚ್ಚರದಿಂದ ಮಾಡಿದರೆ ಆ ಪೂಜೆ ಸಾತ್ವಿಕವಾಗುತ್ತದೆ. ಅದನ್ನು ಬಿಟ್ಟು ನಾನಾ ದೇವತೆಗಳನ್ನು ಬೇರೆಯಾಗಿ ಪೂಜಿಸಿದಾಗ ಅದೇ ಪೂಜೆ ರಾಜಸವಾಗುತ್ತದೆ.

ಯತ್ ತು ಕೃತ್ಸ್ನವದೇಕಸ್ಮಿನ್ ಕಾರ್ಯೇ ಸಕ್ತಮಹೈತುಕಮ್ ।
ಅತತ್ತ್ವಾರ್ಥವದಲ್ಪಂ ಚ ತತ್ ತಾಮಸಮುದಾಹೃತಮ್ ॥೨೨॥

ಯತ್ ತು ಕೃತ್ಸ್ನವತ್ ಏಕಸ್ಮಿನ್ ಕಾರ್ಯೇ ಸಕ್ತಮ್ ಅಹೈತುಕಮ್ ।
ಅತತ್ತ್ವ ಅರ್ಥವತ್ ಅಲ್ಪಂ ಚ ತತ್ ತಾಮಸಮ್ ಉದಾಹೃತಮ್ -- ಯಾವುದೋ ಒಂದು ಕ್ಷುದ್ರವಾದ ಕಜ್ಜಕ್ಕೆ ಅಂಟಿಕೊಂಡು ಅದೇ ಸರ್ವಸ್ವವೆಂದು [ಬದಲಾಗದ ಜೀವವನ್ನೇ ಬದಲಾಗದ ಭಗವಂತನೆಂದು, ಇಡಿಯ ವಿಶ್ವ ಒಬ್ಬ ಜೀವನ ಕಲ್ಪನಾವಿಲಾಸ ಎಂದು] ನಂಬುವ, ಕಾರಣವಿರದ, ನಿಜವನ್ನು ಗ್ರಹಿಸದ [ವಿಶ್ವ ನಿಜವಲ್ಲ ಎಂದು ಗ್ರಹಿಸುವ] ಕ್ಷುಲ್ಲಕವಾದ ತಿಳಿವು ತಾಮಸ ಎನಿಸುತ್ತದೆ.

ತಾಮಸ ಸ್ವಭಾವಕ್ಕೆ ಅನೇಕ ಮುಖಗಳು. ಕಾಣುವುದು ಅನೇಕ-ಇರುವುದು ಏಕ ಎಂದು ತಿಳಿಯುವುದು; ಜೀವನಿಗಿಂತ ಬೇರೆಯಾದ ಭಗವಂತನನ್ನು ಒಪ್ಪದಿರುವುದು; ಈ ಪ್ರಪಂಚದಲ್ಲಿ ಯಥಾರ್ಥವಾದ ವಸ್ತುವಿಗೆ ಅಸ್ತಿತ್ವವೇ ಇಲ್ಲ ಎಂದು ತಿಳಿದುಕೊಳ್ಳುವುದು; ಅಜ್ಞಾನ-ಅದರಿಂದ ವಿಪರೀತಜ್ಞಾನ; ಅರಿವಿಲ್ಲದಿದ್ದರೂ ಕೂಡಾ ತನ್ನನ್ನು ತಾನು ಮಹಾಜ್ಞಾನಿ ಎಂದು ಭ್ರಮಿಸುವುದು; ಯಾವುದೋ ಒಂದು ವಿಷಯವನ್ನು ತಿಳಿದುಕೊಂಡು ನಾನು ಎಲ್ಲವನ್ನೂ ತಿಳಿದಿದ್ದೇನೆ ಅಂದುಕೊಳ್ಳುವುದು; ಇತ್ಯಾದಿ ತಾಮಸ ಅರಿವು ಎನಿಸುತ್ತದೆ. ನಾವು ನಮ್ಮ ಜ್ಞಾನದ ಇತಿ-ಮಿತಿಯನ್ನು ಅರಿತು ಪ್ರತೀ ಕ್ಷಣ ಅದಕ್ಕಿಂತ ಹೆಚ್ಚಿನ ಸತ್ಯವನ್ನು ತಿಳಿಯಲು ನಿರಂತರ ಪ್ರಯತ್ನ ಮಾಡಬೇಕು-ಇಲ್ಲದಿದ್ದರೆ ನಾವು ತಾಮಸರಾಗುತ್ತೇವೆ. ದ್ವೈತ ಸಿದ್ಧಾಂತ ನಮಗೆ ಸರಿಯಾಗಿ ಅರ್ಥವಾಗಬೇಕಾದರೆ ನಾವು ಅದ್ವೈತ ಮತ್ತು ವಿಶಿಷ್ಟಾದ್ವೈತವನ್ನು ಓದಿರಬೇಕು. ಹಿಂದುತ್ವ ಅರ್ಥವಾಗಬೇಕಾದರೆ ಮುಸ್ಲಿಂ ಮತ್ತು ಕ್ರೈಸ್ತ ಧರ್ಮ ಏನು ಹೇಳುತ್ತದೆ ಎನ್ನುವ ಅರಿವು ನಮಗಿರಬೇಕು. ಇದನ್ನು ಬಿಟ್ಟು ನಾನು ನಂಬಿದ್ದೇ ಸತ್ಯ ಉಳಿದದ್ದೆಲ್ಲ ಮಿಥ್ಯ ಎಂದು ಗ್ರಹಿಸುವವನ ಮೂಢ ಅರಿವು ತಾಮಸವೆನಿಸುತ್ತದೆ. ಸದಾ ಸತ್ಯದ ಹುಡುಕಾಟ, ಜ್ಞಾನದ ದಾಹ- ನಮ್ಮನ್ನು ಸಾತ್ವಿಕತೆಯತ್ತ ಕೊಂಡೊಯ್ಯಬಲ್ಲದು. ಜ್ಞಾನವನ್ನು ತನ್ನ ಲೌಕಿಕ, ವ್ಯಾವಹಾರಿಕ ಬದುಕಿಗೆ ಸೀಮಿತಗೊಳಿಸಿಕೊಂಡು; ಇನ್ನೊಬ್ಬರಲ್ಲಿರುವ ಸಾತ್ವಿಕ ಜ್ಞಾನವನ್ನು ಗುರುತಿಸದೆ; ಪರಮಾತ್ಮನ ಪ್ರಜ್ಞೆ ಇಲ್ಲದ ಅನುಷ್ಠಾನದಲ್ಲಿ ಬದುಕುವಂತೆ ಮಾಡುವ ಮೂಢ ಅರಿವು ತಾಮಸ.

ನಿಯತಂ ಸಂಗರಹಿತಮರಾಗದ್ವೇಷತಃ ಕೃತಮ್ ।
ಅಫಲಪ್ರೇಪ್ಸುನಾ ಕರ್ಮ ಯತ್ ತತ್ ಸಾತ್ತ್ವಿಕಮುಚ್ಯತೇ ॥೨೩॥

ನಿಯತಮ್ ಸಂಗರಹಿತಮ್ ಅರಾಗ ದ್ವೇಷತಃ ಕೃತಮ್ ।
ಅಫಲಪ್ರೇಪ್ಸುನಾ ಕರ್ಮ ಯತ್ ತತ್ ಸಾತ್ತ್ವಿಕಮ್ ಉಚ್ಯತೇ – ಹಚ್ಚಿಕೊಳ್ಳದೆ, ಮೆಚ್ಚು-ಕಿಚ್ಚುಗಳಿಗೊಳಗಾಗದೆ, ಫಲದ ಹಂಬಲವಿರದೇ ಮಾಡಿದ ವಿಹಿತವಾದ ಕರ್ಮ ಸಾತ್ವಿಕ ಎನಿಸುತ್ತದೆ.

ನಮಗೆ ಪ್ರಾಪ್ತವಾಗಿರುವ ವಿಹಿತಕರ್ಮವನ್ನು ಭಗವಂತನ ಪೂಜಾರೂಪವಾಗಿ ಮಾಡಿದಾಗ ಅದು ಸಾತ್ವಿಕ ಕರ್ಮವಾಗುತ್ತದೆ. ಈ ಕರ್ಮದಲ್ಲಿ ಯಾವುದೇ ರಾಗ-ದ್ವೇಷವಿಲ್ಲ; ಫಲಾಪೇಕ್ಷೆಯಿಲ್ಲ; ಯಾವುದೇ ರೀತಿ ಅಂಟಿಸಿಕೊಳ್ಳುವಿಕೆಯಿಲ್ಲ.ಶ್ರದ್ಧಾ-ಭಕ್ತಿಯಿಂದ, ನಿರ್ಲಿಪ್ತತೆಯಿಂದ, ಕರ್ತವ್ಯವನ್ನು ನಿರ್ವಂಚನೆಯಿಂದ ಭಗವದರ್ಪಣಾಭಾವದಿಂದ ಮಾಡುವ ಕರ್ಮ ಸಾತ್ವಿಕ ಕರ್ಮ.

ಯತ್ ತು ಕಾಮೇಪ್ಸುನಾ ಕರ್ಮ ಸಾಹಂಕಾರೇಣ ವಾ ಪುನಃ ।
ಕ್ರಿಯತೇ ಬಹುಲಾಯಾಸಂ ತದ್ ರಾಜಸಮುದಾಹೃತಮ್ ॥೨೪॥

ಯತ್ ತು ಕಾಮ ಈಪ್ಸುನಾ ಕರ್ಮ ಸ ಅಹಂಕಾರೇಣ ವಾ ಪುನಃ ।
ಕ್ರಿಯತೇ ಬಹುಲ ಆಯಾಸಮ್ ತತ್ ರಾಜಸಮ್ ಉದಾಹೃತಮ್ –ಫಲದ ಬಯಕೆಯಿಂದ ಅಥವಾ ಹಮ್ಮಿನಿಂದ ದೇಹವನ್ನು ಬಳಲಿಸಿ, ದಂಡಿಸಿ ಮಾಡುವ ಕರ್ಮ ರಾಜಸ ಎನಿಸುತ್ತದೆ.

ಮಾಡುವ ಕೆಲಸವೇನೋ ಒಳ್ಳೆಯ ಕೆಲಸವೆ. ಆದರೆ ಅದರ ಹಿಂದೆ ಅನೇಕ ಕಾಮನೆ, ನಾನುಮಾಡಿದೆ ಅನ್ನುವ ಅಹಂಕಾರ ಸೇರಿದಾಗ ಅದು ರಾಜಸ ಕರ್ಮವೆನಿಸುತ್ತದೆ. ನಮ್ಮ ಯಾವುದೋ ಸಮಸ್ಯೆಯ ಪರಿಹಾರಕ್ಕಾಗಿ ಕರ್ಮ ಮಾಡುವುದು, ಕರ್ಮ ಮಾಡುವಾಗ ಅನೇಕ ಫಲದ ಅಪೇಕ್ಷೆಯಿಂದ ಮಾಡುವುದು, ಮಾಡಿದ ಮೇಲೆ 'ನಾನು ಮಾಡಿದೆ' ಎಂದು ಅಹಂಕಾರಪಡುವುದು ರಾಜಸ ಕರ್ಮದ ಲಕ್ಷಣ. ಜೀವನಪೂರ್ತಿ ಯಾವುದೋ ಕಾಮನೆಯ ಬೆನ್ನು ಹತ್ತಿ, ನಾಳೆಯ ಸುಖವನ್ನು ಬಯಸಿ, ಇದ್ದ ಇಂದಿನ ಸುಖವನ್ನು ಮರೆತು ದೇಹವನ್ನು ಬಳಲಿಸಿ ಮಾಡುವ ಕರ್ಮ ರಾಜಸ ಕರ್ಮ.

ಅನುಬಂಧಂ ಕ್ಷಯಂ ಹಿಂಸಾಮನಪೇಕ್ಷ್ಯ ಚ ಪೌರುಷಮ್ ।
ಮೋಹಾದಾರಭ್ಯತೇ ಕರ್ಮ ಯತ್ ತತ್ ತಾಮಸಮುಚ್ಯತೇ ॥೨೫॥

ಅನುಬಂಧಂ ಕ್ಷಯಂ ಹಿಂಸಾಮ್ ಅನಪೇಕ್ಷ್ಯ ಚ ಪೌರುಷಮ್ ।
ಮೋಹಾತ್ ಆರಭ್ಯತೇ ಕರ್ಮ ಯತ್ ತತ್ ತಾಮಸಮ್ ಉಚ್ಯತೇ – ಪರಿಣಾಮ, ಪೋಲು, ತೊಂದರೆಗಳನ್ನು ಗಮನಿಸದೆ, ತನ್ನ ಳವನ್ನು ಮೀರಿ ತಿಳಿಗೇಡಿತನದಿಂದ ತೊಡಗುವ ಕರ್ಮ ತಾಮಸ ಎನಿಸುತ್ತದೆ.

ತನ್ನ ಯೋಗ್ಯತೆಯನ್ನು ತಿಳಿದುಕೊಳ್ಳದೆ, ಮುಂದೇನಾಗುತ್ತದೆ ಎನ್ನುವ ಯೋಚನೆಯನ್ನೂ ಮಾಡದೆ, ಫಲಾಪೇಕ್ಷೆ, ದುಡುಕು, ಅಹಂಕಾರ, ದ್ವೇಷದಿಂದ; ಭಗವಂತನನ್ನು ಮರೆತು ಮಾಡುವ ಸಮಾಜ ವಿನಾಶಕವಾದ ಕರ್ಮ ತಾಮಸ ಕರ್ಮ. ಇದಕ್ಕೆ ಉತ್ತಮ ದೃಷ್ಟಾಂತ ದುರ್ಯೋಧನ ಮಾಡಿದ ಕರ್ಮಗಳು. ಮುಂದೆ ಆಗುವ ದುರಂತದ ಬಗ್ಗೆ ಯೋಚಿಸದೆ, ಇನ್ನೊಬ್ಬರಿಗೆ ಕೆಟ್ಟದ್ದಾಗಬೇಕು ಎನ್ನುವ ಅನಿಷ್ಟ ಚಿಂತನೆಯಿಂದ ಮಾಡುವ ಕರ್ಮ ತಾಮಸ. ಒಳ್ಳೆಯ ಕರ್ಮವೂ ಕೆಟ್ಟ ಉದ್ದೇಶದಿಂದ ಮಾಡಿದಾಗ ತಾಮಸವಾಗುತ್ತದೆ.

ಜ್ಞಾನ ಮತ್ತು ಕರ್ಮದಲ್ಲಿ ತ್ರೈವಿಧ್ಯದ ವಿಧವನ್ನು ಹೇಳಿದ ಕೃಷ್ಣ ಮುಂದೆ 'ಕರ್ತಾ'ನಲ್ಲಿ ಮೂರು ವಿಧವನ್ನು ವಿವರಿಸುತ್ತಾನೆ.

ಮುಕ್ತಸಂಗೋಽನಹಂವಾದೀ ಧೃತ್ಯುತ್ಸಾಹಸಮನ್ವಿತಃ ।
ಸಿದ್ಧ್ಯಸಿದ್ಧ್ಯೋರ್ನಿರ್ವಿಕಾರಃ ಕರ್ತಾ ಸಾತ್ತ್ವಿಕ ಉಚ್ಯತೇ ॥೨೬॥

ಮುಕ್ತ ಸಂಗಃ ಅನಹಂವಾದೀ ಧೃತಿ ಉತ್ಸಾಹ ಸಮನ್ವಿತಃ ।
ಸಿದ್ಧಿ ಅಸಿಧ್ಯೋಃ ನಿರ್ವಿಕಾರಃ ಕರ್ತಾ ಸಾತ್ತ್ವಿಕಃ ಉಚ್ಯತೇ -- ಹಚ್ಚಿಕೊಳ್ಳದವನು, ನಾನು ಮಾಡಿದೆ ಎಂದು ಕೊಚ್ಚಿಕೊಳ್ಳದವನು, ಹುರುಪಳಿಯದ ಗಟ್ಟಿಗ, ಗಳಿಕೆ-ಅಳಿಕೆಗಳಿಂದ ವಿಚಲಿತನಾಗದವನು ಸಾತ್ವಿಕ ಕರ್ತಾರ ಎನಿಸುತ್ತಾನೆ.

ಸಾತ್ವಿಕ ಕರ್ತಾ ಯಾವುದನ್ನೂ ಅಂಟಿಸಿಕೊಳ್ಳುವುದಿಲ್ಲ. ಹೇಗೆ ಯಾವುದೇ ಪೂಜೆಯ ಕೊನೆಯಲ್ಲಿ 'ಶ್ರೀ ಕೃಷ್ಣಾರ್ಪಣಮಸ್ತು' ಎಂದು ಅರ್ಪಿಸುವ ಪದ್ಧತಿ ಇದೆಯೋ ಹಾಗೇ ಸಾತ್ವಿಕ ತನ್ನ ಜೀವನದಲ್ಲಿ ತಾನು ಮಾಡುವ ಎಲ್ಲಾ ಕರ್ಮವನ್ನು ಭಗವದ್ ಭಕ್ತಿಯಿಂದ ಭಗವದರ್ಪಣಾಭಾವದಿಂದ ಮಾಡುತ್ತಾನೆ. ಅವನಿಗೆ 'ನಾನು ಮಾಡಿದೆ' ಎನ್ನುವ ಅಹಂಕಾರವೇ ಇಲ್ಲ. ಯಾವುದೇ ಕೆಲಸವಿರಲಿ ಆತ ಅದನ್ನು ಅತ್ಯುತ್ಸಾಹದಿಂದ ಮಾಡುತ್ತಾನೆ. ಮಾಡಿದ ಕೆಲಸ ಕೈಗೂಡದಿದ್ದಾಗ ಆತ ಕುಸಿಯುವುದಿಲ್ಲ, ಯಶಸ್ವೀಯಾದಾಗ ಹಾರಾಡುವುದಿಲ್ಲ. ಎಲ್ಲವನ್ನು ನಿರ್ವಿಕಾರನಾಗಿ ಮಾಡುತ್ತಾನೆ. ಇದನ್ನೇ ದ್ವಾದಷಸ್ತೋತ್ರದಲ್ಲಿ ಆಚಾರ್ಯರು ಈ ರೀತಿ ಸುಂದರವಾಗಿ ಹೇಳಿದ್ದಾರೆ:

ಕುರು ಭುಂಕ್ಷ್ವ ಚ ಕರ್ಮ ನಿಜಂ ನಿಯತಂ ಹರಿಪಾದವಿನಮ್ರಧಿಯಾ ಸತತಂ ।
ಹರಿರೇವ ಪರೋ ಹರಿರೇವ ಗುರುಃ ಹರಿರೇವ ಜಗತ್ಪಿತೃಮಾತೃಗತಿಃ ॥

ನಿನ್ನ ಪಾಲಿನ ಕರ್ಮ ನೀನು ಮಾಡು. ಬಂದುದನುಣ್ಣು. ಹರಿಪಾದದ ಸ್ಮರಣೆ ತಪ್ಪದಿರಲಿ-ಇದು ಸಾತ್ವಿಕನ ಜೀವನದ ಮೂಲ ಮಂತ್ರ.

ರಾಗೀ ಕರ್ಮಫಲಪ್ರೇಪ್ಸುರ್ಲುಬ್ಧೋ ಹಿಂಸಾತ್ಮಕೋऽಶುಚಿಃ ।
ಹರ್ಷಶೋಕಾನ್ವಿತಃ ಕರ್ತಾ ರಾಜಸಃ ಪರಿಕೀರ್ತಿತಃ ॥೨೭॥

ರಾಗೀ ಕರ್ಮಫಲ ಪ್ರೇಪ್ಸು ಲುಬ್ಧಃ ಹಿಂಸಾ ಆತ್ಮಕಃ ಅಶುಚಿಃ ।
ಹರ್ಷ ಶೋಕ ಅನ್ವಿತಃ ಕರ್ತಾ ರಾಜಸಃ ಪರಿಕೀರ್ತಿತಃ – ಹಚ್ಚಿಕೊಳ್ಳುವವ, ಫಲ ದೊರೆತಾಗ ಹಿಗ್ಗುವವ, ಇರದಾಗ ಕುಗ್ಗುವವ –ಇಂತಹ ಕರ್ತಾರ ರಾಜಸ ಎನಿಸುತ್ತಾನೆ.

ರಾಜಸನಾದವನು ಒಳ್ಳೆಯ ಕೆಲಸ ಮಾಡುತ್ತಾನೆ ಆದರೆ ಅದರಲ್ಲಿ 'ಹರ್ಷ ಶೋಕ' ತುಂಬಿರುತ್ತದೆ. ಆತ ತನ್ನ ಕೆಲಸದಲ್ಲಿ ಯಶಸ್ವಿಯಾದಾಗ ಆಕಾಶಕ್ಕೇರುತ್ತಾನೆ, ಕೆಲಸ ಕೈಗೂಡದಾಗ ಪಾತಾಳಕ್ಕೆ ಕುಸಿಯುತ್ತಾನೆ. ಇದಕ್ಕೆ ಮೂಲ ಕಾರಣ ರಾಜಸನಾದವನು ತನ್ನ ಪ್ರತಿಯೊಂದು ಕರ್ಮವನ್ನು ಫಲಾಪೇಕ್ಷೆಯಿಂದಲೇ ಮಾಡುವುದು. ಆತ ಕರ್ಮವನ್ನು ಅಂಟಿಸಿಕೊಂಡು ಕರ್ಮಫಲದ ನಿರೀಕ್ಷೆಯಲ್ಲಿ ಕರ್ತವ್ಯ ನಿರ್ವಹಿಸುತ್ತಿರುತ್ತಾನೆ. ಮಾಡುವ ಕಾರ್ಯದಲ್ಲಿ ಲೋಭ, ಶ್ರದ್ಧೆ ಇಲ್ಲದೇ ಮಾಡುವುದು, ಕರ್ಮ ಮಾಡುವಾಗ ಮಾನಸಿಕ ಸ್ವಚ್ಛತೆ ಇಲ್ಲದೇ ಇರುವುದು ರಾಜಸನಾದವನ ಸ್ವಭಾವ.

ಅಯುಕ್ತಃ ಪ್ರಾಕೃತಃ ಸ್ತಬ್ಧಃ ಶಠೋ ನೈಕೃತಿಕೋऽಲಸಃ ।
ವಿಷಾದೀ ದೀರ್ಘಸೂತ್ರೀ ಚ ಕರ್ತಾ ತಾಮಸ ಉಚ್ಯತೇ ॥೨೮॥

ಅಯುಕ್ತಃ ಪ್ರಾಕೃತಃ ಸ್ತಬ್ಧಃ ಶಠಃ ನೈಕೃತಿಕಃ ಅಲಸಃ ।
ವಿಷಾದೀ ದೀರ್ಘಸೂತ್ರೀ ಚ ಕರ್ತಾ ತಾಮಸಃ ಉಚ್ಯತೇ – ನಡೆಗೇಡಿ, ಅಸಂಸ್ಕೃತ[ಭಗವಂತನಲ್ಲಿ ಭಕ್ತಿಯಿರದವ], ಹಿರಿಮೆಗೆ ತಲೆ ಬಾಗದವ, ಉದ್ಧಟ, ಮೋಸಗಾರ, ಸೋಮಾರಿ, ಹುರುಪಿರದವ, ಇನ್ನೊಬ್ಬರ ತಪ್ಪನ್ನೇ ಅನುಗಾಲ ಟೀಕಿಸುವವ [ಮತ್ತೆ ಮಾಡಿದರೆ ಸರಿ ಎಂದು ಕೆಲಸವನ್ನು ಸುಮ್ಮನೆ ಮುಂದೂಡುವವ]- ಇಂತಹ ಕರ್ತಾರ ತಾಮಸ ಎನಿಸುತ್ತಾನೆ.

ತಾಮಸರಲ್ಲಿ ಅನೇಕ ವಿಧ.

(೧)ಅಯುಕ್ತಃ : ಮಾಡುವ ಕೆಲಸದಲ್ಲಿ ನಂಬಿಕೆ ಶ್ರದ್ಧೆ ಇಲ್ಲದೇ ಇರುವುದು. ಕರ್ಮ ಮಾಡುವಾಗ ಕರ್ಮ ನಿಯಾಮಕನಾದ ಭಗವಂತನಲ್ಲಿ ಮನೋಯೋಗವೇ ಇಲ್ಲದಿರುವುದು.

(೨)ಪ್ರಾಕೃತಃ : ದೇವರ ಮೇಲೆ ನಂಬಿಕೆಯೇ ಇಲ್ಲದವರು. ಕೇವಲ ಪ್ರಾಕೃತ ಪ್ರಪಂಚದಲ್ಲಿ ಆಸಕ್ತಿ ಉಳ್ಳವರು.

(೩)ಸ್ತಬ್ಧಃ : ತಾನು ಮಾಡುವ ಕರ್ಮದಲ್ಲಿ ತಪ್ಪಿದ್ದರೂ ಕೂಡಾ ಅದನ್ನು ತಿದ್ದಿಕೊಳ್ಳದೇ, ತಿಳುವಳಿಕೆ ಇಲ್ಲದೇ, ತಪ್ಪು ನಂಬಿಕೆಯನ್ನೇ ಆಚರಿಸಿಕೊಂಡು ಸಾಗುವವರು.

(೪)ಶಠಃ : ತಪ್ಪು ಎಂದು ಗೊತ್ತಿದ್ದರೂ ತಿದ್ದಿಕೊಳ್ಳುವ ಅಪೇಕ್ಷೆ ಇಲ್ಲದೇ ಇರುವವರು. ನಾನೇಕೆ ತಲೆ ತಗ್ಗಿಸಬೇಕು ಎನ್ನುವ ಮನೋವೃತ್ತಿ ಇರುವವರು.

(೫)ನೈಕೃತಿಕಃ : ಒಳ್ಳೆಯತನದ ವೇಷಹಾಕಿಕೊಂಡು ಬುದ್ಧಿಪೂರ್ವಕವಾಗಿ ಇನ್ನೊಬ್ಬರಿಗೆ ಮೋಸಮಾಡಿ ಲಾಭಪಡೆಯುವವರು.

(೬)ಅಲಸಃ : ಯಾವುದು ಒಳ್ಳೆಯದು ಎನ್ನುವುದು ಗೊತ್ತಿದೆ ಆದರೆ ಮಾಡಲು ಸೋಮಾರಿತನ ಇರುವವರು.

(೭)ವಿಶಾದೀ: ಒಂದು ಕ್ರಿಯೆಯನ್ನು 'ಅಯ್ಯೋ ಮಾಡಬೇಕಲ್ಲಾ' ಎಂದು ಮಾಡುವವರು. ಮಾಡಿದ ಮೇಲೂ ಮತ್ತೆ ಬೇಸರ ವ್ಯಕ್ತಪಡಿಸುವವರು.

(೮)ದೀರ್ಘಸೂತ್ರಿ: ಮತ್ತೆ ಮಾಡಿದರಾಯ್ತು ಎಂದು ದೀರ್ಘಕಾಲ ಕೆಲಸವನ್ನು ಮುಂದೂಡುವವರು. ಇನ್ನೊಬ್ಬರ ಒಳ್ಳೆಯಗುಣವನ್ನು ಕಾಣದೇ ಅವರ ಯಾವುದೋ ಹಳೆಯ ತಪ್ಪನ್ನೇ ಎತ್ತಿ ಹೇಳುವವರು.

ಇಲ್ಲಿ ಹೇಳಿರುವ ಯಾವ ಒಂದು ಗುಣವಿದ್ದರೂ ಕೂಡಾ ಆತ ತಾಮಸನೆನಿಸುತ್ತಾನೆ. ಉದಾಹರಣೆಗೆ ಈ ಎಲ್ಲಾ ಗುಣಗಳಿದ್ದ ವ್ಯಕ್ತಿ ಮಹಾಭಾರತದ ದುರ್ಯೋಧನ.

ಬುದ್ಧೇರ್ಭೇದಂ ಧೃತೇಶ್ಚೈವ ಗುಣತಸ್ತ್ರಿವಿಧಂ ಶೃಣು ।
ಪ್ರೋಚ್ಯಮಾನಮಶೇಷೇಣ ಪೃಥಕ್ ತ್ವೇನ ಧನಂಜಯ ॥೨೯॥

ಬುದ್ಧೇಃ ಭೇದಮ್ ಧೃತೇಃ ಚ ಏವ ಗುಣತಃ ತ್ರಿವಿಧಮ್ ಶೃಣು ।
ಪ್ರೋಚ್ಯಮಾನಮ್ ಅಶೇಷೇಣ ಪೃಥಕ್ ತ್ವೇನ ಧನಂಜಯ -- ಧನಂಜಯಾ, ಬುದ್ಧಿ ಮತ್ತು ಧೈರ್ಯ ಕೂಡಾ ಗುಣದಿಂದ ಮೂರು ಬಗೆ. ಪೂರ್ತಿಯಾಗಿ ಅದರ ಪ್ರತ್ಯೇಕ ವಿವರಣೆಯನ್ನಾಲಿಸು.

ದೇಹ ಮತ್ತು ಇಂದ್ರಿಯಗಳು ಪೂರ್ಣಪ್ರಮಾಣದಲ್ಲಿ ವಿಕಸನ ಹೊಂದಿರುವುದು ಮಾನವರಲ್ಲಿ. ಅದಕ್ಕಾಗಿ ಮಾನವ ಶರೀರವನ್ನು 'ಪುರ' ಎನ್ನುತ್ತಾರೆ. ಈ ದೇಹದಲ್ಲಿರುವ ಜೀವನಿಗೆ(ಪುರುಷ) ಬುದ್ಧಿ ಮತ್ತು ಧೃತಿ ಬಹಳ ಮುಖ್ಯವಾದ ಅಂಶ. ನಾವು ನಮ್ಮ ಜೀವನದಲ್ಲಿ ಹೇಡಿಗಳಾಗದೆ ಬುದ್ಧಿವಂತರಾಗಿ ಬದುಕಬೇಕು. ಈ ಬುದ್ಧಿ ಮತ್ತು ಧೃತಿಯಲ್ಲಿ ಕೂಡಾ ಮೂರು ವಿಧ. ಸಾತ್ವಿಕ, ರಾಜಸ ಮತ್ತು ತಾಮಸ. ನಾವು ನಮ್ಮ ಜೀವನದಲ್ಲಿ ರಾಜಸ ಮತ್ತು ತಾಮಸವನ್ನು ಅನುಸರಿಸಬಾರದು. ಅದಕ್ಕಾಗಿ ಯಾವುದು ರಾಜಸ ಯಾವುದು ತಾಮಸ ಎನ್ನುವ ವಿಚಾರ ನಮಗೆ ತಿಳಿದಿರಬೇಕು. "ಬುದ್ಧಿ ಮತ್ತು ಧೃತಿಯಲ್ಲಿ ಮೂರು ಬಗೆಯನ್ನು ಪೂರ್ಣವಾಗಿ, ಬಿಡಿಬಿಡಿಯಾಗಿ ಹೇಳುತ್ತೇನೆ-ಅದನ್ನು ಗಮನವಿಟ್ಟು ಕೇಳು" ಎಂದು ಕೃಷ್ಣ ಅರ್ಜುನನಲ್ಲಿ ಹೇಳುತ್ತಾನೆ. ನಾವು ಸಾತ್ವಿಕ ಧೃತಿಯನ್ನು ಗೆದ್ದು ಧನಂಜಯರಾಗಬೇಕು ಎನ್ನುವುದು ಕೃಷ್ಣನ ಈ ಸಂದೇಶದ ಮೂಲ ಉದ್ದೇಶ.

ಪ್ರವೃತ್ತಿಂ ಚ ನಿವೃತ್ತಿಂ ಚ ಕಾರ್ಯಾಕಾರ್ಯೇ ಭಯಾಭಯೇ ।
ಬಂಧಂ ಮೋಕ್ಷಂ ಚ ಯಾ ವೇತ್ತಿ ಬುದ್ಧಿಃ ಸಾ ಪಾರ್ಥ ಸಾತ್ತ್ವಿಕೀ ॥೩೦॥

ಪ್ರವೃತ್ತಿಮ್ ಚ ನಿವೃತ್ತಿಮ್ ಚ ಕಾರ್ಯ ಅಕಾರ್ಯೇ ಭಯ ಅಭಯೇ ।
ಬಂಧಂ ಮೋಕ್ಷಮ್ ಚ ಯಾ ವೇತ್ತಿ ಬುದ್ಧಿಃ ಸಾ ಪಾರ್ಥ ಸಾತ್ತ್ವಿಕೀ – ಪಾರ್ಥಾ, ಇಹದ ಧರ್ಮ-ಪರದ ಧರ್ಮ, ಮಾಡಬೇಕಾದ್ದು-ಮಾಡಬಾರದ್ದು, ಅಂಜಬೇಕಾದ್ದು- ಅಂಜಬಾರದ್ದು, ಬಂಧನದ ದಾರಿ- ಬಿಡುಗಡೆಯ ದಾರಿ ಇವನ್ನೆಲ್ಲಾ ಅರಿಯಬಲ್ಲ ಬುದ್ಧಿಯೇ ಸಾತ್ತ್ವಿಕ ಬುದ್ಧಿ.

ನಮ್ಮ ಜೀವನದಲ್ಲಿ ಮುಖ್ಯವಾಗಿ ಎದುರಾಗುವ ಸಮಸ್ಯೆ ಏನೆಂದರೆ 'ಒಂದು ಕೆಲಸವನ್ನು ಮಾಡಬೇಕೋ ಬೇಡವೋ' ಎನ್ನುವ ಗೊಂದಲ. ಯಾವುದನ್ನು ಹಿಡಿಯಬೇಕು, ಯಾವುದನ್ನು ಬಿಡಬೇಕು; ಯಾವುದು ಒಳ್ಳೆಯ ಕೆಲಸ, ಯಾವುದು ಕೆಟ್ಟ ಕೆಲಸ ಎನ್ನುವ ತೀರ್ಮಾನ; ನನ್ನ ಕರ್ತವ್ಯ ಯಾವುದು ಎಂದು ತಿಳಿದಿರುವುದು; ಧರ್ಮ-ಅಧರ್ಮಗಳು; ಪಾಪ-ಪುಣ್ಯಗಳು; ಭಯ-ಅಭಯ; ಬಂಧನದ ಮತ್ತು ಬಿಡುಗಡೆಯ ದಾರಿ- ಇವೆಲ್ಲವುದರ ಬಗ್ಗೆ ಖಚಿತವಾದ ನಿರ್ಧಾರ ಸಾತ್ವಿಕ ಮನಸ್ಸಿಗಿರುತ್ತದೆ. ಇದು ಸ್ವಾರ್ಥದ ಸುಳಿವೇ ಇಲ್ಲದ(ಅಪಾರ್ಥ)-ಪ್ರಜ್ಞೆ; ಜ್ಞಾನದ ಆಳಕ್ಕೆ ಇಳಿದಾಗ ಬರುವ-ಪ್ರಜ್ಞೆ; ಬುದ್ಧಿ ವಿಸ್ತಾರವಾದಾಗ(ಪಾರ್ಥ) ಬರುವ-ಪ್ರಜ್ಞೆ. ವಿಶ್ಲೇಷಣೆ ಮಾಡಿ ನಾವು ಸರಿಯಾದ ದಾರಿಯಲ್ಲಿ ಹೋಗುವಂತೆ ತೀರ್ಮಾನ ಮಾಡತಕ್ಕಂತಹ-ವಿವೇಕಪ್ರಜ್ಞೆ. ನಮಗೆ ನಮ್ಮ ಆತ್ಮಸಾಕ್ಷಿ ಎಂದೂ ಮೋಸ ಮಾಡುವುದಿಲ್ಲ. ಪ್ರತಿಯೊಬ್ಬನ ಆತ್ಮಸಾಕ್ಷಿ ಕೊಡುವ ನಿರ್ಧಾರ ಖಚಿತವಾದ ನಿರ್ಧಾರವಾಗಿರುತ್ತದೆ ಮತ್ತು ಅದು ಸಾತ್ವಿಕ.

ಯಯಾ ಧರ್ಮಮಧರ್ಮಂ ಚ ಕಾರ್ಯಂ ಚಾಕಾರ್ಯಮೇವ ಚ ।
ಅಯಥಾವತ್ ಪ್ರಜಾನಾತಿ ಬುದ್ಧಿಃ ಸಾ ಪಾರ್ಥ ರಾಜಸೀ ॥೩೧॥

ಯಯಾ ಧರ್ಮಮ್ ಅಧರ್ಮಮ್ ಚ ಕಾರ್ಯಮ್ ಚ ಅಕಾರ್ಯಮ್ ಏವ ಚ ।
ಅಯಥಾವತ್ ಪ್ರಜಾನಾತಿ ಬುದ್ಧಿಃ ಸಾ ಪಾರ್ಥ ರಾಜಸೀ – ಪಾರ್ಥಾ, ಯಾವುದು ಧರ್ಮ –ಯಾವುದು ಅಧರ್ಮ, ಯಾವುದು ಮಾಡಬೇಕಾದ್ದು –ಯಾವುದು ಮಾಡಬಾರದ್ದು ಎನ್ನುವುದನ್ನು ಸರಿಯಾಗಿ ನಿರ್ಧರಿಸಲಾಗದ ಬುದ್ಧಿ ರಾಜಸ ಬುದ್ಧಿ.

ಕೆಲವೊಮ್ಮೆ ಧರ್ಮವನ್ನೇ ಅಧರ್ಮ ಎಂದು ತಿಳಿಯುವುದು ಅಥವಾ ಅಧರ್ಮವನ್ನೇ ಧರ್ಮವೆಂದು ತಿಳಿಯುವುದು; ಇನ್ನು ಕೆಲವೊಮ್ಮೆ ಯಾವುದು ಸರಿ ಯಾವುದು ತಪ್ಪು ಎನ್ನುವ ಗೊಂದಲದಲ್ಲಿ ಬೀಳುವುದು- ರಾಜಸ ಬುದ್ಧಿ. ಜೀವನದಲ್ಲಿ ಉಪಯೋಗಕ್ಕೆಬಾರದ ಈ ವಿಧವಾದ ಬುದ್ಧಿ, ಯಾವುದು ಮಾಡಬೇಕಾದದ್ದು- ಯಾವುದು ಮಾಡಬಾರದ್ದು ಎನ್ನುವುದನ್ನು ಸರಿಯಾಗಿ ನಿರ್ಧರಿಸಲಾರದು.

ಅಧರ್ಮಂ ಧರ್ಮಮಿತಿ ಯಾ ಮನ್ಯತೇ ತಮಸಾಽಽವೃತಾ ।
ಸರ್ವಾರ್ಥಾನ್ ವಿಪರೀತಾಂಶ್ಚ ಬುದ್ಧಿಃ ಸಾ ಪಾರ್ಥ ತಾಮಸೀ ॥೩೨॥

ಅಧರ್ಮಮ್ ಧರ್ಮಮ್ ಇತಿ ಯಾ ಮನ್ಯತೇ ತಮಸಾ ಆವೃತಾ ।
ಸರ್ವ ಅರ್ಥಾನ್ ವಿಪರೀತಾನ್ ಚ ಬುದ್ಧಿಃ ಸಾ ಪಾರ್ಥ ತಾಮಸೀ –ಪಾರ್ಥ, ಅಧರ್ಮವನ್ನೇ ಧರ್ಮವೆಂದು ಗ್ರಹಿಸುವ, ಹೀಗೆ ಎಲ್ಲಾ ಸಂಗತಿಯನ್ನು ವಿಪರೀತವಾಗಿಯೇ ಗ್ರಹಿಸುವ, ಕತ್ತಲು ಕವಿದ ಬುದ್ಧಿ ತಾಮಸ ಬುದ್ಧಿ.

ಇರುವ ವಿಷಯವನ್ನು ಯಥಾವತ್ತಾಗಿ ಗ್ರಹಿಸದೆ, ವ್ಯತಿರಿಕ್ತವಾಗಿಯೇ ಗ್ರಹಿಸುವ ಬುದ್ಧಿ ತಾಮಸ. ಇವರು ದುಃಖವನ್ನು ದುಃಖವೆಂದು ಗ್ರಹಿಸದೆ ಸುಖವೆಂದು ಗ್ರಹಿಸುತ್ತಾರೆ. ಉದಾಹರಣೆಗೆ ಮದ್ಯಪಾನ ಮಾಡುವುದು ಆನಂದ ಎಂದು ಭ್ರಮಿಸಿ ಮದ್ಯಪಾನ ವ್ಯಸನಿಗಳಾಗುವುದು. ಜ್ಞಾನವನ್ನೇ ಅಜ್ಞಾನವೆಂದು ತಿಳಿದು, ತಮ್ಮ ವಿಪರೀತ ಜ್ಞಾನವನ್ನೇ ಸರ್ವಸ್ವವಾಗಿರಿಸಿಕೊಂಡು, ಇನ್ನೊಬ್ಬರ ಮಾತಿಗೆ ಕಿವಿಗೊಡದಂತೆ ಮಾಡುವ ಬುದ್ಧಿ ತಾಮಸ ಬುದ್ಧಿ.

ಯಾರಿಗೆ ಒಳ್ಳೆಯ ಬುದ್ಧಿ ಇದೆಯೋ ಅವರಿಗೆ ಧೃತಿ ಇರುತ್ತದೆ. ಅಜ್ಞಾನದಿಂದ-ಭಯ, ಅರಿವಿನಿಂದ-ಅಭಯ. ವೇದಾಂತವಿರುವುದೇ ಅಭಯಕ್ಕಾಗಿ, ಮನಸ್ಸಿಗೆ ಧೈರ್ಯ ತುಂಬಿ ಮನುಷ್ಯನನ್ನು ನಿರ್ಭಯನನ್ನಾಗಿ ಮಾಡುವುದಕ್ಕೋಸ್ಕರ.
'ಧೃತಿ' ಎನ್ನುವುದರ ಮೇಲ್ನೋಟದ ಅರ್ಥ -ಧೈರ್ಯ, ಆತ್ಮವಿಶ್ವಾಸ(**Confidence**), ಎದೆಗಾರಿಕೆ(**courage**) ಇತ್ಯಾದಿ. ಇದರ ಪೂರ್ಣ ಪ್ರಮಾಣದ ಅರ್ಥ ಇನ್ನೂ ವಿಶಾಲ. ಅಷ್ಟಾಂಗಜಪದಲ್ಲಿ(ಯಮ, ನಿಯಮ, ಆಸನ, ಪ್ರಾಣಾಯಾಮ, ಪ್ರತ್ಯಾಹಾರ, ಧ್ಯಾನ, ಧಾರಣ ಮತ್ತು ಸಮಾಧಿ) ಹೇಳುವ 'ಧಾರಣ'-ಧೃತಿ. ಒಂದು ವಿಷಯವನ್ನು ಗ್ರಹಿಸಿ ಅದನ್ನು ಮನಸ್ಸಿನಲ್ಲಿಟ್ಟುಕೊಳ್ಳುವುದು ಧೃತಿ. ಇಂತಹ ಧೃತಿಯಲ್ಲೂ ಮೂರು ವಿಧ-ಸಾತ್ವಿಕ, ರಾಜಸ ಮತ್ತು ತಾಮಸ. ಇದರ ಸುಂದರ ವಿವರಣೆಯನ್ನು ಮುಂದಿನ ಮೂರು ಶ್ಲೋಕಗಳಲ್ಲಿ ಕಾಣಬಹುದು.

ಧೃತ್ಯಾ ಯಯಾ ಧಾರಯತೇ ಮನಃಪ್ರಾಣೇಂದ್ರಿಯಕ್ರಿಯಾಃ ।
ಯೋಗೇನಾವ್ಯಭಿಚಾರಿಣ್ಯಾ ಧೃತಿಃ ಸಾ ಪಾರ್ಥ ಸಾತ್ತ್ವಿಕೀ ॥೩೩॥

ಧೃತ್ಯಾ ಯಯಾ ಧಾರಯತೇ ಮನಃ ಪ್ರಾಣ ಇಂದ್ರಿಯ ಕ್ರಿಯಾಃ ।
ಯೋಗೇನ ಅವ್ಯಭಿಚಾರಿಣ್ಯಾ ಧೃತಿಃ ಸಾ ಪಾರ್ಥ ಸಾತ್ತ್ವಿಕೀ – ಪಾರ್ಥ, ಭಕ್ತಿಯೋಗದಿಂದ ಬಗೆಗೊಂಡು ಯಾವ ಗಟ್ಟಿತನದ ಮನಸ್ಸು, ಪ್ರಾಣ ಮತ್ತು ಇಂದ್ರಿಯಗಳ ವ್ಯಾಪಾರಗಳನ್ನು ದಾರಿಗೆಡದಂತೆ ಧರಿಸಬಲ್ಲುದೋ ಅದು ಸಾತ್ವಿಕ ಧೈರ್ಯ.

ಯಾವ ಧೃತಿಯಿಂದ ಮನಸ್ಸು, ದೇಹ, ಇಂದ್ರಿಯಗಳು ದಾರಿತಪ್ಪದೆ ಒಂದಕ್ಕೊಂದು ಪೂರಕವಾಗಿ ಭಕ್ತಿಯೋಗದಲ್ಲಿ ಕೆಲಸ ಮಾಡುತ್ತೇವೆ-ಅಂತಹ ಧೃತಿ ಸಾತ್ವಿಕ ಧೃತಿ. ಮನಸ್ಸು ಯಥಾವತ್ತಾದದ್ದನ್ನು ಗ್ರಹಿಸುತ್ತದೆ, ಇಂದ್ರಿಯಗಳು ಮತ್ತು ದೇಹ ಅದಕ್ಕೆ ಪೂರಕವಾಗಿ, ಭಕ್ತಿಯಿಂದ ಕೆಲಸ ಮಾಡುತ್ತವೆ. ಇಲ್ಲಿ ಯೋಗ ಎಂದರೆ ಭಗವದ್ ಭಕ್ತಿಗೆ ಪೂರಕವಾಗಿ ವಾಸ್ತವವನ್ನು ಗ್ರಹಿಸುವ ಉಪಾಯ- ಅದೇ ನಮ್ಮ ಆತ್ಮವಿಶ್ವಾಸ. ಇದರಲ್ಲಿ

ಅನೇಕ ಮುಖಗಳಿವೆ. ಉದಾಹರಣೆಗೆ 'ತಪ್ಪನ್ನು ತಪ್ಪು ಎಂದು ಹೇಳುವ ಧೈರ್ಯ'. ಸಾಮಾನ್ಯವಾಗಿ ತಪ್ಪನ್ನು ತಪ್ಪು ಎಂದು ಹೇಳಲು ಅನೇಕ ತೊಂದರೆಗಳಿರುತ್ತವೆ. ಇದಕ್ಕೆ ಮೊದಲ ಅಡ್ಡಿ-ದಾಕ್ಷಿಣ್ಯ. ಭಗವದ್ ಭಕ್ತಿಗೆ ಪೂರಕವಾದದ್ದನ್ನು ನಾವು ನಿರ್ದಯವಾಗಿ ಹೇಳಿಬಿಡಬೇಕು. ದೈರ್ಯವಾಗಿ ತಪ್ಪನ್ನು ಪ್ರತಿಭಟಿಸಬೇಕು. ತಪ್ಪು ಗ್ರಹಿಕೆ ಮಾಡದೆ, ತಪ್ಪು ದಾರಿಯಲ್ಲಿ ಸಾಗದೆ, ಭಗವದ್ ಭಕ್ತಿಗೆ ವಿರುದ್ಧವಾಗಿ ನಡೆದುಕೊಳ್ಳದೆ, ಸತ್ಯವನ್ನು ನಿಷ್ಠುರವಾಗಿ ಹೇಳುವುದು ಸಾತ್ವಿಕ ಧೃತಿ. ಮನಸ್ಸು ಕೆಟ್ಟದ್ದನ್ನು ಯೋಚಿಸದೇ ಇರುವುದು, ದೇಹ ಕೆಟ್ಟದ್ದರ ಕಡೆ ಚಲಿಸದೇ ಇರುವುದು, ಇಂದ್ರಿಯಗಳು ಕೆಟ್ಟದ್ದನ್ನು ಗ್ರಹಿಸದೇ ಇರುವುದು- ಹೀಗೆ ಭಗವದ್ ಭಕ್ತಿಗೆ ಪೂರಕವಾಗಿರುವ ಎಲ್ಲವೂ ಸಾತ್ವಿಕ ಧೃತಿ.

ಸಾಮಾನ್ಯವಾಗಿ ನಾವು ನಮ್ಮ ದೇಹ ಇಂದ್ರಿಯಗಳನ್ನು ನಿಯಂತ್ರಿಸಬಹುದು, ಆದರೆ ಮನಸ್ಸು ಕೆಟ್ಟದ್ದನ್ನು ಯೋಚಿಸದಂತೆ ನಿಯಂತ್ರಿಸುವುದು ಬಹಳ ಕಷ್ಟದ ಕೆಲಸ. ಇದನ್ನು ಸಾಧಿಸಲು ಧೀರ್ಘಕಾಲದ ಸಾಧನೆ ಅಗತ್ಯ. ಈ ಎಲ್ಲಾ ವಿಷಯಗಳು ತಿಳಿದಾಗ ನಾವು ಸಾತ್ವಿಕ ಧೃತಿಯಿಂದ ಎಷ್ಟು ದೂರದಲ್ಲಿದ್ದೇವೆ ಎನ್ನುವುದು ತಿಳಿಯುತ್ತದೆ ಮತ್ತು ನಮ್ಮನ್ನು ನಾವು ತಿದ್ದಿಕೊಂಡು ಸಾತ್ವಿಕ ಧೃತಿಯತ್ತ ಸಾಗಲು ಸಹಾಯಕವಾಗುತ್ತದೆ.

ಯಯಾ ತು ಧರ್ಮಕಾಮಾರ್ಥಾನ್ ಧೃತ್ಯಾ ಧಾರಯತೇSರ್ಜುನ ।
ಪ್ರಸಂಗೇನ ಫಲಾಕಾಂಕ್ಷೀ ಧೃತಿಃ ಸಾ ಪಾರ್ಥ ರಾಜಸೀ ॥೩೪॥

ಯಯಾ ತು ಧರ್ಮ ಕಾಮ ಅರ್ಥಾನ್ ಧೃತ್ಯಾ ಧಾರಯತೇ ಅರ್ಜುನ ।
ಪ್ರಸಂಗೇನ ಫಲ ಆಕಾಂಕ್ಷೀ ಧೃತಿಃ ಸಾ ಪಾರ್ಥ ರಾಜಸೀ – ಪಾರ್ಥಾ, ಧರ್ಮ-ಕಾಮ-ಅರ್ಥಗಳನ್ನು ಓಲೈಸುವ, ಅತಿಯಾಗಿ ಹಚ್ಚಿಕೊಂಡು ಫಲದ ಆಸೆ ಹೊತ್ತ ಗಟ್ಟಿತನ ರಾಜಸ ಧೈರ್ಯ.

ತಾಯಿ ತನ್ನ ಮಗುವನ್ನು ನಿಸ್ವಾರ್ಥವಾಗಿ ಪ್ರೀತಿಸುವಂತೆ ಭಗವಂತನನ್ನು ಪ್ರೀತಿಸುವುದು ಭಕ್ತಿ. ಈ ಪ್ರೀತಿಯಲ್ಲಿ ಫಲಾಪೇಕ್ಷೆ ಸೇರಿದರೆ ಅದು ಭಕ್ತಿ ಎನಿಸದೆ ಸ್ವಾರ್ಥ ಎನಿಸುತ್ತದೆ. ರಾಜಸ ತನ್ನ ಇಷ್ಟಾರ್ಥ ಸಿದ್ಧಿಗಾಗಿ ಆದಷ್ಟು ಧರ್ಮದ ಚೌಕಟ್ಟಿನಲ್ಲೇ ಕಾರ್ಯ ನಿರ್ವಹಿಸಬಹುದು. ಆದರೆ ಆತ ಹಣವನ್ನು ಗಳಿಸುವುದಕ್ಕಾಗಿ ಅಥವಾ ಅತಿಯಾದ ಮೋಹದಿಂದ ಫಲದ ಆಸೆ ಹೊತ್ತ ಗಟ್ಟಿತನ ತನ್ನದಾಗಿರಿಸಿಕೊಂಡಿರುತ್ತಾನೆ. ಇದು ರಾಜಸ ಧೃತಿ. ನಾವು ರಾಜಸ ಗುಣದ ಸ್ಪರ್ಶವಿಲ್ಲದ, ಬಿಳಿಯಾದ(ಅರ್ಜುನ)-ಶುದ್ಧಸಾತ್ವಿಕರಾಗಬೇಕು ಎನ್ನುವುದು ಕೃಷ್ಣನ ಸಂದೇಶ.

ಯಯಾ ಸ್ವಪ್ನಂ ಭಯಂ ಶೋಕಂ ವಿಷಾದಂ ಮದಮೇವ ಚ ।
ನ ವಿಮುಂಚತಿ ದುರ್ಮೇಧಾ ಧೃತಿಃ ಸಾ ಪಾರ್ಥ ತಾಮಸೀ ॥೩೫॥

ಯಯಾ ಸ್ವಪ್ನಂ ಭಯಂ ಶೋಕಂ ವಿಷಾದಂ ಮದಮ್ ಏವ ಚ ।
ನ ವಿಮುಂಚತಿ ದುರ್ಮೇಧಾ ಧೃತಿಃ ಸಾ ಪಾರ್ಥ ತಾಮಸೀ – ಪಾರ್ಥಾ, ನಿದ್ದೆ, ಅಂಜಿಕೆ, ದುಗುಡ, ನಿರುತ್ಸಾಹ, ಸೊಕ್ಕುಗಳನ್ನು ಬಿಟ್ಟಿರಲಾಗದ ತಿಳಿಗೇಡಿಯ ಗಟ್ಟಿತನವೇ ತಾಮಸ ಧೈರ್ಯ.

ಗ್ರಹಿಕೆಯಲ್ಲಿ ತಾಮಸ ಪ್ರವೃತ್ತಿ ಉಳ್ಳವ ತಿಳಿಗೇಡಿ, ಅವಿವೇಕಿ. ಆತ ಒಳ್ಳೆಯ ಗ್ರಹಿಕೆಗಳಿಗೆ ಹೋಗುವುದೇ ಇಲ್ಲ. ಒಳ್ಳೆಯ ವಿಷಯ ಚರ್ಚೆಯಾಗುವಾಗ ಈತ ನಿದ್ದೆಮಾಡುತ್ತಿರುತ್ತಾನೆ. ಈತನಿಗೆ ಯಾವಾಗಲೂ ಭಯ.[ಉದಾಹರಣೆಗೆ ಲಂಚ ತೆಗೆದುಕೊಳ್ಳುವುದು ಮತ್ತು ಅದರಿಂದಾಗಿ ಜೀವನಪೂರ್ತಿ ಭಯದಿಂದ ಬಾಳುವುದು]. ಈತನ ಜೀವನದಲ್ಲಿ ಲವಲವಿಕೆ, ಉತ್ಸಾಹ, ಗೆಲುವು ಇರುವುದಿಲ್ಲ. ತಾನು ಶ್ರೇಷ್ಠ ಉಳಿದವರು ಕನಿಷ್ಠ ಎನ್ನುವ ಅಶಾಸ್ತ್ರೀಯವಾದ ಸಂಕಲ್ಪ ತಾಮಸ ಧೃತಿ.

ಸುಖಂ ತ್ವಿದಾನೀಂ ತ್ರಿವಿಧಂ ಶೃಣು ಮೇ ಭರತರ್ಷಭ ।
ಅಭ್ಯಾಸಾದ್ ರಮತೇ ಯತ್ರ ದುಃಖಾಂತಂ ಚ ನಿಗಚ್ಛತಿ ॥೩೬॥

ಯತ್ ತದಗ್ರೇ ವಿಷಮಿವ ಪರಿಣಾಮೇಽಮೃತೋಪಮಮ್ ।
ತತ್ ಸುಖಂ ಸಾತ್ವಿಕಂ ಪ್ರೋಕ್ತಮಾತ್ಮಬುದ್ಧಿಪ್ರಸಾದಜಮ್ ॥೩೭॥

ಸುಖಮ್ ತು ಇದಾನೀಮ್ ತ್ರಿವಿಧಮ್ ಶೃಣು ಮೇ ಭರತರ್ಷಭ ।
ಅಭ್ಯಾಸಾತ್ ರಮತೇ ಯತ್ರ ದುಃಖಾಂತಮ್ ಚ ನಿಗಚ್ಛತಿ ॥
ಯತ್ ತತ್ ಅಗ್ರೇ ವಿಷಮ್ ಇವ ಪರಿಣಾಮೇ ಅಮೃತ ಉಪಮಮ್ ।
ತತ್ ಸುಖಮ್ ಸಾತ್ವಿಕಮ್ ಪ್ರೋಕ್ತಮ್ ಆತ್ಮ ಬುದ್ಧಿ ಪ್ರಸಾದಜಮ್ -- ಭರತರ್ಷಭಾ, ಈಗ ಮೂರುತೆರನಾದ ಸುಖವನ್ನು ನನ್ನಿಂದಾಲಿಸು: ಬಳಕೆಯಿಂದ ಖುಷಿಕೊಡುವಂತಹದ್ದು, ದುಃಖವನ್ನು ನೀಗಿಸುವಂತಹದ್ದು, ಮೊದಲು ವಿಷದಂತೆ ಅಪ್ರಿಯವಾಗಿ ಕೊನೆಗೆ ಅಮೃತದಂತೆ ಹಿತ ನೀಡುವಂತಹದ್ದು –ಇಂತಹ ಸುಖ-ಸಾತ್ವಿಕ. ಇದು ತನ್ನ ಬಗೆ ತಿಳಿಯಾದಾಗ, ಭಗವಂತನ ಕರುಣೆಯಿಂದ ಬರುವಂತಹದ್ದು.

ಮನುಷ್ಯ ಒಟ್ಟಾಗಿ ಜೀವನದಲ್ಲಿ ಬಯಸುವುದು ಸುಖವನ್ನು. ಆತನ ಜೀವನದ ಕೊನೆಯ ಗುರಿ ಸುಖ. ಆದರೆ ಯಾವುದು ನಿಜವಾದ ಸುಖ? ಸುಖದಲ್ಲೂ ಮೂರು ವಿಧ-ಸಾತ್ವಿಕ, ರಾಜಸ ಮತ್ತು ತಾಮಸ. "ತ್ರೈವಿದ್ಯೆಯ ವಿವರಣೆಯ ಕೊನೆಯಲ್ಲಿ ಸುಖದ ಮೂರು ವಿಧದ ವಿವರಣೆಯನ್ನು ಕೇಳು" ಎನ್ನುತ್ತಾನೆ ಕೃಷ್ಣ. ಇಲ್ಲಿ ಬಳಸಿರುವ 'ಭರತರ್ಷಭ' ಎನ್ನುವ ವಿಶೇಷಣದ ಹಿಂದೆ ವ್ಯಾಸರು ನಮಗೆ ಅನೇಕ ಸಂದೇಶವನ್ನು ಕೊಟ್ಟಿರುವುದನ್ನು ನಾವು ಗಮನಿಸಬೇಕು. ಭಗವಂತನ ಭಕ್ತಿಯಲ್ಲಿ-ರತ(ಶ್ರೇಷ್ಠ)ರಾದಾಗ; ಭರತನಂತೆ ಲೌಕಿಕ ಸುಖದ ಆಸೆ ಇಲ್ಲದೆ ಪೂರ್ಣ ಪ್ರಮಾಣದಲ್ಲಿ ಶ್ರೀರಾಮಚಂದ್ರನನ್ನು ಪ್ರೀತಿಸಿದಾಗ; ಭಗವಂತನ ಭಕ್ತಿಯಲ್ಲಿ ನಿರತರಾದವರಲ್ಲಿ ಶ್ರೇಷ್ಠರಾದ ವಾಯು(ಹನುಮಂತ)ದೇವರಲ್ಲಿ ಗುರುಭಕ್ತಿಯನ್ನಿಟ್ಟು, ಭಗವದರ್ಪಣಾಭಾವದಿಂದ ನಮ್ಮ ಕರ್ಮ ನಿರ್ವಹಿಸಿದಾಗ-ನಾವು ಭರತರ್ಷಭರಾಗಬಹುದು. ಭರತರ್ಷಭನಾದವನಿಗೆ ನಿಜವಾದ ಸುಖ ಎಂದರೇನು ಎಂದು ತಿಳಿದು ಅದನ್ನು ಅನುಭವಿಸಲು ಸಾಧ್ಯ.

ಯಾವುದೇ ಒಂದು ವಿಷಯ ಪ್ರಾರಂಭದಿಂದಲೇ ಸುಖವಾಗಿ ಕಾಣಿಸಿದರೆ ಅದು ಸಾತ್ವಿಕ ಸುಖವಲ್ಲ. ಕಷ್ಟಪಡದೆ ಅನಾಯಾಸವಾಗಿ ಪಡೆಯುವುದು ಮೋಹದ ಸುಖ. ಸಾತ್ವಿಕ ಸುಖ ಮೊದಲು ಕಷ್ಟ ರೂಪದಲ್ಲಿರುತ್ತದೆ. ಇದಕ್ಕೆ ಉತ್ತಮ ದೃಷ್ಟಾಂತ ಸಮುದ್ರಮಥನ. ಅಲ್ಲಿ ಮೊದಲು ಬಂದಿರುವುದು ಅಮೃತವಲ್ಲ ಬದಲಿಗೆ ವಿಷ. ನಿಜವಾದ ಅಮೃತ ಸಿಕ್ಕಿರುವುದು ಕೊನೆಯಲ್ಲಿ. ಕೈಕೆಸರಾದರೆ ಬಾಯಿ ಮೊಸರು-ಕಷ್ಟಪಟ್ಟರೆ ಸುಖ. ನಾವು ಕುಡಿಯುವ ಔಷಧ ವಿಷದಂತೆ ಕಹಿ, ಆದರೆ ಅದರಿಂದ ಬರುವ ಆರೋಗ್ಯ ಅಮೃತದಂತೆ ಸಿಹಿ.

ಕೃಷ್ಣ ಇಲ್ಲಿ "ಆತ್ಮ ಬುದ್ಧಿ ಪ್ರಸಾದಜಮ್" ಎನ್ನುವ ಒಂದು ಅಪೂರ್ವ ವಿಶೇಷಣವನ್ನು ಬಳಸಿದ್ದಾನೆ. ಆತ್ಮಪ್ರಸಾದ ಅಂದರೆ ದೇವರ ಅನುಗ್ರಹ. ಸಾತ್ವಿಕ ಸುಖ ನಾವು ಬೇಕು ಎಂದು ಬಯಸಿದಾಗ ಸಿಗುವುದಿಲ್ಲ. ಅದು ಭಗವಂತನ ಅನುಗ್ರಹದಿಂದ ಸಿಗುವಂತಹದ್ದು. ಅದನ್ನು ಪಡೆಯಲು ನಮಗೆ ಪಾರದರ್ಶಕವಾದ ಶುದ್ಧ ಮನಸ್ಸಿರಬೇಕು. ಅದು ಹೊರಗಿನಿಂದ ಬರುವುದಲ್ಲ ಬದಲಿಗೆ ಒಳಗಿನಿಂದ ಚಿಮ್ಮುವುದು. ಹೀಗೆ ಭಗವಂತನ ಅನುಗ್ರಹ ಮತ್ತು ಮನಸ್ಸಿನ ಪ್ರಸನ್ನತೆಯಿದ್ದಾಗ ಒಳಗಿನ ಸ್ವರೂಪಾನಂದದ ಸುಖವನ್ನು ಅನುಭವಿಸಲು ಸಾಧ್ಯ.

ವಿಷಯೇಂದ್ರಿಯ ಸಂಯೋಗಾದ್ ಯತ್ ತದಗ್ರೇಽಮೃತೋಪಮಮ್ ।
ಪರಿಣಾಮೇ ವಿಷಮಿವ ತತ್ ಸುಖಂ ರಾಜಸಂ ಸ್ಮೃತಮ್ ॥೩೮॥

ವಿಷಯ ಇಂದ್ರಿಯ ಸಂಯೋಗಾತ್ ಯತ್ ತತ್ ಅಗ್ರೇ ಅಮೃತ ಉಪಮಮ್ ।
ಪರಿಣಾಮೇ ವಿಷಮ್ ಇವ ತತ್ ಸುಖಮ್ ರಾಜಸಮ್ ಸ್ಮೃತಮ್ -- ವಿಷಯ ಮತ್ತು ಇಂದ್ರಿಯಗಳ ನಂಟಿನಿಂದ ಉಂಟಾಗುವಂತಹದ್ದು, ಮೊದಲು ಅಮೃತದಂತೆ ರೋಚಕ, ಕಡೆಗೆ ವಿಷದಂತೆ ಅಪಾಯಕಾರಿ –ಅಂತಹ ಸುಖ ರಾಜಸ ಎನಿಸುತ್ತದೆ.

ಯಾವುದು ಮೊದಲು ಅನುಭವಿಸುವಾಗ ಬಹಳ ಸುಖವನ್ನು ಕೊಟ್ಟು ಆ ನಂತರ ಪರಿಣಾಮ ದುಃಖಕರವಾಗಿರುತ್ತದೋ ಅದು ರಾಜಸ ಸುಖ. ಇದು ಬಾಹ್ಯಸುಖ. ಇದು ಹೊರಗಿನ ವಿಷಯಗಳಿಗೂ ನಮ್ಮ ಇಂದ್ರಿಯಗಳಿಗೂ ಸಂಪರ್ಕದಿಂದ ತತ್ಕಾಲಕ್ಕೆ ಸಿಗುವ ಸುಖ. ಇಂದು ನಾವು ಕಾಣುವ ಹೆಚ್ಚಿನ ಅಪರಾಧ ಸುದ್ದಿಗಳು ಈ ರೀತಿಯ ಕ್ಷಣಿಕ ಸುಖದ ಹಿಂದೆ ಹೋಗಿ ಆಗುವ ಪರಿಣಾಮ. ವಿಷಯ ಸುಖವನ್ನು ಅನುಭವಿಸುವುದು ತಪ್ಪಲ್ಲ, ಆದರೆ ಅನುಭವಿಸಿ ಅದನ್ನು ಮೀರಿನಿಲ್ಲುವುದು ಬಹಳ ಮುಖ್ಯ. ಹಿಂದಿನವರು ಮುಖ್ಯವಾಗಿ ಎರಡನ್ನು ಗೆಲ್ಲು ಎಂದಿದ್ದಾರೆ. ಒಂದು-ಆಹಾರದ ಚಟ ಇನ್ನೊಂದು ಲೈಂಗಿಕ ಚಪಲ. ಒಟ್ಟಿನಲ್ಲಿ ಕ್ಷಣಿಕವಾದ ಇಂದ್ರಿಯ ಸುಖವನ್ನು ಗೆಲ್ಲುವುದು ಬಹಳ ಮುಖ್ಯ.

ಯದಗ್ರೇ ಚಾನುಬಂಧೇ ಚ ಸುಖಂ ಮೋಹನಮಾತ್ಮನಃ ।
ನಿದ್ರಾಲಸ್ಯಪ್ರಮಾದೋತ್ಥಂ ತತ್ ತಾಮಸಮುದಾಹೃತಮ್ ॥೩೯॥

ಯತ್ ಅಗ್ರೇ ಚ ಅನುಬಂಧೇ ಚ ಸುಖಂ ಮೋಹನಮ್ ಆತ್ಮನಃ ।
ನಿದ್ರಾ ಆಲಸ್ಯ ಪ್ರಮಾದ ಉತ್ಥಂ ತತ್ ತಾಮಸಮ್ ಉದಾಹೃತಮ್ -- ಮೊದಲೂ ಕೊನೆಗೂ ಮತ್ತು ಬರಿಸಿ ಮೈಮರೆಸುವಂತಹ ಸುಖ, ನಿದ್ದೆ-ಮೈಗಳ್ಳತನ-ಎಚ್ಚರಗೇಡಿತನಗಳಿಂದ ಸಿಗುವಂತಹ ಸುಖ-ತಾಮಸ ಎನಿಸುತ್ತದೆ.

ಮನುಷ್ಯನನ್ನು ವಾಸ್ತವ ಪ್ರಪಂಚದಿಂದ ಭ್ರಮೆಗೆ ತಳ್ಳಿ, ಅವನನ್ನು ಮೋಹದಬಲೆಯಲ್ಲಿ ಬೀಳಿಸಿ, ಬುದ್ಧಿಗೇಡಿಯನ್ನಾಗಿಸಿ, ಸಂತೋಷದ ಭ್ರಮೆ ಹುಟ್ಟಿಸುವುದು ತಾಮಸ ಸುಖ. ಇದರಲ್ಲಿ ಮೊದಲೂ ಸುಖವಿಲ್ಲ, ಕೊನೆಗೂ ಸುಖವಿಲ್ಲ. ಉದಾಹರಣೆಗೆ ಮದ್ಯಪಾನ, ಧೂಮಪಾನ ಇತ್ಯಾದಿ ಎಲ್ಲಾ ದುಶ್ಚಟಗಳು.
ಸೋಮಾರಿತನದಿಂದ ಬರುವ ಸುಖ, ನಿದ್ದೆಯಿಂದ ಬರುವ ಸುಖ, ಎಚ್ಚರಗೇಡಿತನದಿಂದ ಬರುವ ಸುಖ-ಇವು ಒಳಗಿನ ಮನಸ್ಸನ್ನು ಕೊಂದು ಪಡೆಯುವ ಬಾಹ್ಯ ಸುಖ- ಇದು ತಾಮಸ. ಉದಾಹರಣೆಗೆ ನಿದ್ದೆ. ಮನುಷ್ಯ ಮಗುವಾಗಿದ್ದಾಗ ಆತನಿಗೆ ಇಪ್ಪತ್ತು ಗಂಟೆ ನಿದ್ದೆ ಮತ್ತು ನಾಲ್ಕು ಗಂಟೆ ಎಚ್ಚರ ಅಗತ್ಯ. ಆದರೆ ಪ್ರಬುದ್ಧನಾದವನಿಗೆ ನಾಲ್ಕು ಗಂಟೆ ನಿದ್ದೆ ಸಾಕು. ಆತ ಅಭ್ಯಾಸ ಮಾಡಿದರೆ ಇಪ್ಪತ್ತು ಗಂಟೆ ಎಚ್ಚರವಾಗಿರಬಹುದು. ಆದರೆ ತಾಮಸ ಸುಖ ದಿನವಿಡೀ ನಿದ್ದೆ ಮಾಡುವುದೇ ಪರಮ ಸುಖ ಎಂದು ಭ್ರಮೆ ಹುಟ್ಟಿಸಿ ಮನುಷ್ಯನನ್ನು ದಾರಿ ತಪ್ಪಿಸುತ್ತದೆ.

ನ ತದಸ್ತಿ ಪೃಥಿವ್ಯಾಂ ವಾ ದಿವಿ ದೇವೇಷು ವಾ ಪುನಃ ।
ಸತ್ತ್ವಂ ಪ್ರಕೃತಿಜೈರ್ಮುಕ್ತಂ ಯದೇಭಿಃ ಸ್ಯಾತ್ ತ್ರಿಭಿರ್ಗುಣೈಃ ॥೪೦॥

ನ ತತ್ ಅಸ್ತಿ ಪೃಥಿವ್ಯಾಂ ವಾ ದಿವಿ ದೇವೇಷು ವಾ ಪುನಃ ।
ಸತ್ತ್ವಂ ಪ್ರಕೃತಿಜೈಃ ಮುಕ್ತಂ ಯತ್ ಏಭಿಃ ಸ್ಯಾತ್ ತ್ರಿಭಿಃ ಗುಣೈಃ -- ಭೂಮಿಯಲ್ಲಾಗಲೀ, ಸ್ವರ್ಗದಲ್ಲಿನ ದೇವತೆಗಳಲ್ಲಾಗಲೀ, ಪ್ರಕೃತಿಯಿಂದುಟಾದ ಈ ಮೂರು ಗುಣಗಳಿಂದ ಬಿಡುಗಡೆಗೊಂಡ ಜೀವಜಾತವೆಂಬುದಿಲ್ಲ.

ತ್ರೈಗುಣ್ಯದ ಬಗ್ಗೆ ವಿವರವಾದ ಚಿತ್ರಣವನ್ನು ಕೊಟ್ಟ ನಂತರ ಕೃಷ್ಣ ಜೀವ ಸ್ವಭಾವದ ವಿವರಣೆಯನ್ನು ಕೊಡುತ್ತಾನೆ. ಈ ಭೂಮಿಯಲ್ಲಾಗಲೀ, ಅಥವಾ ಸತ್ಯಲೋಕದ ತನಕ ಯಾವುದೇ ದೇವತಾ ಲೋಕವಿರಲೀ, ಸಮಸ್ತ ಜೀವಜಾತಗಳು ಈ ಪ್ರಕೃತಿಯಿಂದ ನಿರ್ಮಿತವಾದ ತ್ರಿಗುಣಗಳ ಅಧೀನ. ಪ್ರತಿಯೊಂದು ಜೀವವೂ ಕೂಡಾ ಈ ಮೂರು ಸ್ವಭಾವಕ್ಕೆ ಒಳಪಟ್ಟಿದೆ ಮತ್ತು ಪ್ರತಿಯೊಂದು ಜೀವ ಈ ಮೂರು ಗುಣಗಳ ಕಲಬೆರಕೆ. ನೂರಕ್ಕೆ ನೂರು ಸಾತ್ವಿಕ/ರಾಜಸ/ತಾಮಸ ಯಾರೂ ಇಲ್ಲ. ಇಡೀ ಜಗತ್ತು ಮೂರರ ಮಿಶ್ರಣ.
ಜೀವ ಸ್ವಭಾವವನ್ನು ನೇರವಾಗಿ ಸಾತ್ವಿಕ-ರಾಜಸ-ತಾಮಸ ಎಂದು ಮೂರು ವಿಭಾಗ ಮಾಡಲು ಬರುವುದಿಲ್ಲ. ಇದಕ್ಕಾಗಿ ಇದನ್ನು ಚಾತುರ್ವರ್ಣ್ಯವಾಗಿ ಕೃಷ್ಣ ವಿಂಗಡಿಸಿ ಹೇಳಿದ. ಹಿಂದೆ ವಿವರಿಸಿದಂತೆ ಚಾತುರ್ವರ್ಣ್ಯ 'ಜಾತಿವಿಭಾಗ' ಅಲ್ಲ. ಇದು ವರ್ಣ ವಿಭಾಗ. ಭಗವದ್ಗೀತೆಯಾಗಲೀ , ವೇದವಾಗಲೀ ಜಾತಿ ವಿಭಾಗವನ್ನು ಒತ್ತುಕೊಟ್ಟು ಹೇಳುವುದಿಲ್ಲ. ಜಾತಿವಿಭಾಗ ಕೆಲವು ಧರ್ಮ ಶಾಸ್ತ್ರಗಳಲ್ಲಿ ಬಂದಿದೆಯೇ ಹೊರತು ವೇದ ಮತ್ತು

ಭಗವದ್ಗೀತೆಯಲ್ಲಿ ಬಂದಿಲ್ಲ. ಜಾತಿ ಅನ್ನುವುದು ಸಮಾಜ ವ್ಯವಸ್ಥೆಗಾಗಿ ಮಾಡಿಕೊಂಡ ವಿಭಾಗ. ಆದರೆ ವರ್ಣ ಮನಃಶಾಸ್ತ್ರೀಯವಾಗಿ ಜೀವಸ್ವಭಾವವನ್ನು ಅರಿತು ಹೇಳುವಂತಾದ್ದು.

ಸ್ಥೂಲವಾಗಿ ಹೇಳಬೇಕೆಂದರೆ ದೇವತೆಗಳು-ಸಾತ್ವಿಕರು, ಮಾನವರು-ರಾಜಸರು ಮತ್ತು ದೈತ್ಯರು-ತಾಮಸರು. ಆದರೆ ಈ ವಿಭಾಗ ಇಲ್ಲಿಗೆ ಕೊನೆಗೊಳ್ಳುವುದಿಲ್ಲ. ಈ ಪ್ರತಿಯೊಂದು ವರ್ಗದಲ್ಲಿ ಮತ್ತೆ ಮೂರು ವಿಭಾಗವಿದೆ. ಉದಾಹರಣೆಗೆ ತಾಮಸ-ಸಾತ್ವಿಕರು. ಮನುಷ್ಯರಲ್ಲಿ ನರಾಧಮರು ತಾಮಸ-ಸಾತ್ವಿಕರು. ದೈತ್ಯ ಪರಿವಾರದವರು ತಾಮಸ-ರಾಜಸರು; ಅವರನ್ನು ನಿಯಂತ್ರಿಸುವ ಕಾಲನೇಮಿಯಂತಹ ದೈತ್ಯರು ತಾಮಸ-ತಾಮಸರು.

ಮಾನವರಲ್ಲಿ ರಾಜಸ-ತಾಮಸರು ನರಾಧಮರು. ರಾಜಸ-ರಾಜಸರು ಎಂದರೆ ನಿತ್ಯ ಸಂಸಾರಿಗಳು. ಅವರು ಎಂದೂ ತಮಸ್ಸಿಗಾಗಲೀ, ಮೋಕ್ಷಕ್ಕಾಗಲೀ ಹೋಗುವುದಿಲ್ಲ. ಸದಾ ಈ ಸಂಸಾರ ಚಕ್ರದಲ್ಲಿ ಸುತ್ತುತ್ತಿರುತ್ತಾರೆ. ಇನ್ನು ಮೂರನೆಯವರಾದ ರಾಜಸ-ಸಾತ್ವಿಕರು ಮೋಕ್ಷ ಯೋಗ್ಯರು. ಚಾತುರ್ವರ್ಣ್ಯ ಎನ್ನುವುದು ಈ ಮೂರನೇ ಗುಂಪಿಗೆ ಮಾತ್ರ ಸೀಮಿತವಾದದ್ದು. ಆದ್ದರಿಂದ ಮೋಕ್ಷ ಯೋಗ್ಯರಾದ ರಾಜಸ-ಸಾತ್ವಿಕರಲ್ಲಿ ನಾಲ್ಕು ವಿಧ. ಮೋಕ್ಷಯೋಗ್ಯ-ಬ್ರಾಹ್ಮಣ, ಮೋಕ್ಷಯೋಗ್ಯ- ಕ್ಷತ್ರಿಯ, ಮೋಕ್ಷಯೋಗ್ಯ-ವೈಶ್ಯ, ಮತ್ತು ಮೋಕ್ಷಯೋಗ್ಯ-ಶೂದ್ರ. ಇದು ಜೀವ ಸ್ವಭಾವದ ಮೇಲೆ ಇರುವ ನಾಲ್ಕು ವಿಭಾಗ. ಇಲ್ಲಿ ಮೇಲು-ಕೀಳು ಎನ್ನುವ ಭೇದವಿಲ್ಲ. ಎಲ್ಲರೂ ಮೋಕ್ಷ ಯೋಗ್ಯರು. ಸತ್ವ ರಜಸ್ಸು ಮತ್ತು ತಮಸ್ಸಿನ ಅನುಪಾತದಂತೆ ಮತ್ತೆ ಅನೇಕ ವಿಧವನ್ನು ಚಾತುರ್ವರ್ಣ್ಯದೊಳಗೆ ಕಾಣಬಹುದು.

(೧)ಪರಮಹಂಸರು(೯೦-ಅಂಶ ಸಾತ್ವಿಕ):ಇವರು ತಮ್ಮನ್ನು ತಾವು ಪೂರ್ಣವಾಗಿ ಭಗವಂತನಲ್ಲಿ ನೆಲೆಗೊಳಿಸಿಕೊಂಡವರು. ಇವರಲ್ಲಿ ರಾಜಸ ಮತ್ತು ತಾಮಸದ ಅಂಶ ಕೇವಲ ೧೦.

(೨)ಹಂಸರು(೮೫-ಅಂಶ ಸಾತ್ವಿಕ): ಹಂಸರು ಪರಮಹಂಸರ ನಂತರದವರು. ಇವರಲ್ಲಿ ರಾಜಸ ಮತ್ತು ತಾಮಸದ ಪ್ರಮಾಣ ೧೫-ಅಂಶ.

(೩)ಬಹೂದಕರು(೮೦-ಅಂಶ ಸಾತ್ವಿಕ): ಇವರಿಗೆ ಒಂದು ಸ್ಥಿರವಾದ ನೆಲೆ ಇಲ್ಲ. ದಿನಕ್ಕೊಂದು ಕಡೆ ಇವರ ವಾಸ. ಇವರಲ್ಲಿ ಸಾತ್ವಿಕ ಅಂಶ ೮೦ ಮತ್ತು ರಾಜಸ-ತಾಮಸ ಅಂಶ-೨೦

(೪)ಕುಟೀಚಕರು(೭೫-ಅಂಶ ಸಾತ್ವಿಕ): ಇವರು ಬಹೂದಕರಂತೆ. ಆದರೆ ಇವರು ಒಂದು ಕಡೆ ಒಂದು ಮನೆಯಲ್ಲಿ ವಾಸಿಸುವವರು. ಇವರಲ್ಲಿ ರಾಜಸ ಮತ್ತು ತಾಮಸದ ಅಂಶ-೨೫.

(೫)ವಾನಪ್ರಸ್ಥರು(೭೦-ಅಂಶ ಸಾತ್ವಿಕ):ಮನೆಯಲ್ಲಿ ಗೃಹಸ್ಥರಾಗಿದ್ದು, ನಂತರ ತಮ್ಮ ಮಕ್ಕಳು ಪ್ರಾಯಪ್ರಬುದ್ಧರಾದ ಮೇಲೆ ಕಾಡಿಗೆ ಹೋಗಿ ಸಾಧನೆ ಮಾಡುವವರು. ಇವರಲ್ಲಿ ೩೦ ಅಂಶ ರಾಜಸ-ತಾಮಸವಿದ್ದರೆ ಉಳಿದ ೭೦-ಅಂಶ ಸಾತ್ವಿಕ. ಇವರಿಗೆ ಅಗ್ನಿ ಕರ್ಮವಿದೆ, ಸ್ತ್ರೀ-ಸಂಗವಿಲ್ಲ.

(೬)ಬ್ರಹ್ಮಚಾರಿಗಳು(೬೫-ಅಂಶ ಸಾತ್ವಿಕ): ಇವರಲ್ಲಿ ಶೇಕಡಾ ೩೫ ಅಂಶ ರಾಜಸ ಮತ್ತು ತಾಮಸ. ಇವರಿಗೆ ಸ್ತ್ರೀ-ಸಂಗ ನಿಷಿದ್ಧ.

(೭)ಗೃಹಸ್ಥರು: ಇವರಲ್ಲಿ ಸಾತ್ವಿಕ ಅಂಶ ೬೦, ಉಳಿದ ೪೦- ರಾಜಸ ಮತ್ತು-ತಾಮಸ ಅಂಶ. ಇವರು ಸಾಂಸಾರಿಕ ಜೀವನ ನಡೆಸಬಹುದು.

ಈ ಮೇಲಿನ ೭ ವಿಧ- ಬ್ರಾಹ್ಮಣ ವರ್ಗಕ್ಕೆ ಸಂಬಂಧಪಟ್ಟದ್ದು. ಒಟ್ಟಿನಲ್ಲಿ ಹೇಳಬೇಕೆಂದರೆ ಕನಿಷ್ಠ ೬೦-ಪ್ರಮಾಣ ಸಾತ್ವಿಕ-ಅಂಶ ಇರುವ ಮೋಕ್ಷಯೋಗ್ಯ ಮಾನವ ಬ್ರಾಹ್ಮಣ ಎನಿಸುತ್ತಾನೆ.

(೮)ಕ್ಷತ್ರಿಯರು(೫೫:೩೫:೧೦): ಇವರಲ್ಲಿ ಸಾತ್ವಿಕ ಅಂಶ-೫೫ ಮತ್ತು ರಾಜಸ ಅಂಶ ೩೫. ಇವರಿಗೆ ಆಡಳಿತದಲ್ಲಿ ಆಸಕ್ತಿ. ತಮ್ಮ ತೋಳ್ಬಲದಿಂದ ಸಮಾಜದ ರಕ್ಷಣೆ ಮಾಡುವುದು ಇವರ ಕರ್ತವ್ಯ.

(೯)ವೈಶ್ಯರು (೪೦:೪೦:೨೦): ಇವರಲ್ಲಿ ಸಾತ್ವಿಕ ಮತ್ತು ರಾಜಸ ಅಂಶ ಸಮನಾಗಿದೆ(೪೦). ಇವರಿಗೆ ಕೃಷಿ, ಹೈನುಗಾರಿಕೆ, ವ್ಯಾಪಾರದಲ್ಲಿ ಆಸಕ್ತಿ.

(೧೦)ಶೂದ್ರರು(೩೫:೩೫:೩೦): ಇವರು ಇಡೀ ಸಮಾಜದ ಅಡಿಪಾಯ. ಇವರು ಸೇವಾ ಮನೋವೃತ್ತಿ ಇರುವವರು.

ಹೀಗೆ ಸ್ವರೂಪ ಸ್ವಭಾವದಂತೆ ವರ್ಣ ವಿಂಗಡಣೆ. ಇಲ್ಲಿ ಹೇಳಿದ ಎಲ್ಲಾ ಪ್ರಮುಖ ೪ ವರ್ಣದವರು ಮೋಕ್ಷ ಯೋಗ್ಯರು. ಇವರಲ್ಲಿ ಮೇಲು ಕೀಳು ಎನ್ನುವುದಿಲ್ಲ. ಇದು ಕೇವಲ ಭಾರತಕ್ಕೆ ಮೀಸಲಾದ ವಿಂಗಡಣೆ ಅಲ್ಲ. ಈ ರೀತಿಯ ಸ್ವಭಾವ ವಿಂಗಡಣೆ ಪ್ರಪಂಚದ ಎಲ್ಲಾ ಮೂಲೆಗೂ ಅನ್ವಯ. ಭಾರತದ ತತ್ವಶಾಸ್ತ್ರ ಇದನ್ನು ಗುರುತಿಸಿ ನಮಗೆ ನೀಡಿದೆ ಅಷ್ಟೆ. ಇದನ್ನು ಅರ್ಥ ಮಾಡಿಕೊಳ್ಳಲು ಒಂದು ಉದಾಹರಣೆಯನ್ನು ನೋಡುವುದಾದರೆ: ಒಂದು ಮನೆಯಲ್ಲಿ ನಾಲ್ಕು ಜನ ಅಣ್ಣ-ತಮ್ಮಂದಿರರಿದ್ದಾರೆ. ಅವರಲ್ಲಿ ಹಿರಿಯ ಮಗ  ಎಲ್ಲಾ ಮನೆಮಂದಿಗೆ ಪಾಠ-ಪ್ರವಚನ ಮಾಡಿಕೊಂಡು, ವೇದಾಧ್ಯಯನ ಮಾಡಿಕೊಂಡಿದ್ದರೆ-ಆತ ಬ್ರಾಹ್ಮಣ ವರ್ಣ. ಎರಡನೇಯವ ಮನೆಯ ಯಜಮಾನಿಕೆ ನೋಡಿಕೊಂಡರೆ ಆತ-ಕ್ಷತ್ರಿಯ. ಮೂರನೆಯವ ತೋಟ, ಬೇಸಾಯ ಇತ್ಯಾದಿಯಲ್ಲಿ ತನ್ನನ್ನು ತೊಡಗಿಸಿಕೊಂಡಿದ್ದರೆ ಆತ-ವೈಶ್ಯ. ನಾಲ್ಕನೆಯವ ತನ್ನ ಅಣ್ಣಂದಿರರಿಗೆ ಸಹಾಯಕನಾಗಿ ಕಾರ್ಯ ನಿರ್ವಹಿಸುತ್ತಿದ್ದರೆ ಆತ-ಶೂದ್ರ. ಇದು ಮನಃಶಾಸ್ತ್ರೀಯವಾದ ವರ್ಣ ಪದ್ಧತಿ. ಬ್ರಹ್ಮ-ಅಣತಿ ಬ್ರಾಹ್ಮಣಃ. ದೊಡ್ಡದ್ದನ್ನು ತಿಳಿಯುವವನು, ಜ್ಞಾನ ಸಾಧಕ-ಬ್ರಾಹ್ಮಣ. ಕ್ಷತ್ರ-ತ್ರಾಣಃ -ಕ್ಷತ್ರಿಯಃ. ಯಾರಿಗಾದರೂ ಅಪಾಯವಾದಾಗ ರಕ್ಷಣೆಗೆ ಮುನ್ನುಗ್ಗುವವ ಕ್ಷತ್ರಿಯ. ವಿಶ್ ಎಂದರೆ ಸಮಾಜ. ಸಮಾಜಕ್ಕೆ ಬೇಕಾದ ಆಹಾರ ಸಲಕರಣೆ ಪೂರೈಸುವವ ವೈಶ್ಯ. ನಾನಾ ಜನಸ್ಯ ಶುಶ್ರೂಷಃ-ಶೂದ್ರಃ. ಮನುಷ್ಯನ ಮೂಲಭೂತ ಧರ್ಮವಾದ 'ಸೇವೆ'ಯಲ್ಲಿ ನಿರತನಾದವನು ಶೂದ್ರ. ಕೃಷ್ಣ ಈ ಕುರಿತು ಕೊಡುವ ಅಪೂರ್ವ ವಿಶ್ಲೇಷಣೆಯನ್ನು ಮುಂದಿನ ಶ್ಲೋಕಗಳಲ್ಲಿ ನೋಡೋಣ.

ಬ್ರಾಹ್ಮಣಕ್ಷತ್ರಿಯವಿಶಾಂ ಶೂದ್ರಾಣಾಂ ಚ ಪರಂತಪ ।
ಕರ್ಮಾಣಿ ಪ್ರವಿಭಕ್ತಾನಿ ಸ್ವಭಾವಪ್ರಭವೈರ್ಗುಣೈಃ ॥೪೧॥

ಬ್ರಾಹ್ಮಣ ಕ್ಷತ್ರಿಯ ವಿಶಾಮ್ ಶೂದ್ರಾಣಾಮ್ ಚ ಪರಂತಪ ।
ಕರ್ಮಾಣಿ ಪ್ರವಿಭಕ್ತಾನಿ ಸ್ವಭಾವ ಪ್ರಭವೈಃ ಗುಣೈಃ -- ಓ ಅರಿಗಳ ಉರಿಯೇ, ಸ್ವಭಾವದಿಂದುಂಟಾದ ಗುಣಗಳಿಗೆ ಅನುಗುಣವಾಗಿ ಬ್ರಾಹ್ಮಣ, ಕ್ಷತ್ರಿಯ, ವೈಶ್ಯ ಮತ್ತು ಶೂದ್ರರ ಕರ್ಮಗಳೂ ಬೇರೆಬೇರೆಯಾಗಿವೆ.

ಜೀವಸ್ವಭಾವಕ್ಕನುಗುಣವಾಗಿ ಮೋಕ್ಷಯೋಗ್ಯವಾದ ಮಾನವನಲ್ಲಿ ನಾಲ್ಕು ವಿಧದ ವರ್ಣಗಳಿವೆ. ಸ್ವಭಾವಕ್ಕನುಗುಣವಾಗಿ ಪ್ರತಿಯೊಬ್ಬನ ನಡೆ-ನುಡಿ, ಆಚಾರ-ವಿಚಾರ. ಸ್ವಭಾವ ಭೇದದಿಂದಾಗಿ ಗುಣ-ಕರ್ಮ ಭೇದ. ಇದು ಪೂರ್ಣವಾಗಿ ಜೀವ ಸ್ವಭಾವಕ್ಕೆ ಸಂಬಂಧಪಟ್ಟ ವಿಚಾರವಾಗಿರುವುದರಿಂದ ಇದಕ್ಕೂ ಜಾತಿಗೂ ಯಾವ ಸಂಬಂಧವೂ ಇಲ್ಲ. ಜಾತಿ ದೇಹಕ್ಕೆ ಸಂಬಂಧಪಟ್ಟದ್ದು, ವರ್ಣ ಜೀವಸ್ವರೂಪಕ್ಕೆ ಸಂಬಂಧಪಟ್ಟದ್ದು. [ಚಾತುರ್ವರ್ಣ್ಯದ ಬಗ್ಗೆ ಹೆಚ್ಚಿನ ವಿವರಣೆಯನ್ನು ಅಧ್ಯಾಯ ೦೪-ಶ್ಲೋಕ-೧೩ ರಲ್ಲಿ ವಿವರಿಸಲಾಗಿದೆ]. ಈ ನಾಲ್ಕು ವರ್ಣದವರ ಸಹಜ ಕರ್ಮದ ವಿವರಣೆಯನ್ನು ಕೃಷ್ಣ ಮುಂದಿನ ಶ್ಲೋಕಗಳಲ್ಲಿ ವಿವರಿಸಿದ್ದಾನೆ.

ಶಮೋ ದಮಸ್ತಪಃ ಶೌಚಂ ಕ್ಷಾಂತಿರಾರ್ಜವಮೇವ ಚ ।
ಜ್ಞಾನಂ ವಿಜ್ಞಾನಮಾಸ್ತಿಕ್ಯಂ ಬ್ರಹ್ಮಕರ್ಮ ಸ್ವಭಾವಜಮ್ ॥೪೨॥

ಶಮಃ ದಮಃ ತಪಃ ಶೌಚಂ ಕ್ಷಾಂತಿ ಆರ್ಜವಮ್ ಏವ ಚ ।
ಜ್ಞಾನಂ ವಿಜ್ಞಾನಮ್ ಆಸ್ತಿಕ್ಯಂ ಬ್ರಹ್ಮಕರ್ಮ ಸ್ವಭಾವಜಮ್ -- ಭಗವಂತನಲ್ಲಿ ನಿಷ್ಠೆ, ಇಂದ್ರಿಯಗಳಲ್ಲಿ ಹಿಡಿತ, ಉಪವಾಸಾದಿ ನೇಮಗಳು, ನೈರ್ಮಲ್ಯ, ಅಪಕಾರಿಯನ್ನೂ ಮನ್ನಿಸುವ ಸೈರಣೆ, ನೇರ ನಡೆ-ನುಡಿ, ತಿಳಿವು, ಆಳವಾದ ಸಂಶೋಧನಾ ದೃಷ್ಟಿ ಮತ್ತು ಆಸ್ತಿಕತೆ- ಇವು ಬ್ರಾಹ್ಮಣ ಸ್ವಭಾವದ ಸಹಜ ಕರ್ಮಗಳು.

ಜೀವ ಸ್ವಭಾವ 'ಬ್ರಾಹ್ಮಣ' ವಾಗಿದ್ದರೆ ಅವರ ಸಹಜ ಕರ್ಮಗಳು ಹೇಗಿರುತ್ತವೆ ಎನ್ನುವುದನ್ನು ಕೃಷ್ಣ ಈ ಶ್ಲೋಕದಲ್ಲಿ ವಿವರಿಸಿದ್ದಾನೆ. ಈ ವರ್ಣದ ಸ್ವಭಾವಗಳು ಹೀಗಿವೆ:
(೧)ಶಮಃ : ಮನಸ್ಸು ಭಗವಂತನಲ್ಲಿ ನೆಲೆಗೊಂಡಿರುವುದು.
(೨)ದಮಃ : ಇಂದ್ರಿಯಗಳ ಹತೋಟಿ.
(೩)ತಪಃ : ಮಾನಸಿಕವಾಗಿ ವಿಷಯವನ್ನು ಆಳವಾಗಿ ಚಿಂತನೆ ಮಾಡುವುದು, ಮನಸ್ಸು ಒಳ್ಳೆಯದನ್ನು ಯೋಚಿಸುವುದಕ್ಕೆ ಪೂರಕವಾಗಿ ವ್ರತಾನುಷ್ಠಾನ, ನಿರಂತರ ಶಾಸ್ತ್ರ ಚಿಂತನೆ.
(೪)ಶೌಚಮ್ : ಮನಸ್ಸಿನ ಶುದ್ಧತೆ ಮತ್ತು ಅದಕ್ಕೆ ಪೂರಕವಾಗಿ ಬಾಹ್ಯ ಶುದ್ಧಿ.
(೫)ಕ್ಷಾಂತಿ : ತಪ್ಪು ಮಾಡಿದವರನ್ನೂ ಕ್ಷಮಿಸುವ, ಕೋಪಿಸಿಕೊಳ್ಳದ ಮನಸ್ಸು.
(೬)ಆರ್ಜವ : ಸ್ವಚ್ಛ ನಿರಾಳ ಮನಸ್ಸು, ನೇರ ನಡೆ-ನುಡಿ.
(೭)ಜ್ಞಾನ : ಭಗವದ್ ವಿಷಯಕವಾದ ಜ್ಞಾನ.
(೮)ವಿಜ್ಞಾನ : ಭಗವಂತನ ಬಗ್ಗೆ ಆಳವಾದ ಅರಿವು, ಭಗವಂತನ ಗುಣಗಳ ವಿಶಿಷ್ಠ ಜ್ಞಾನ.
(೯)ಆಸ್ತಿಕ್ಯ : ಪೂರ್ಣವಾಗಿ ಭಗವಂತನ ಅಸ್ತಿತ್ವದಲ್ಲಿ ಭರವಸೆ ಪಡೆದು ಮುಂದೆ ಸಾಗುವುದು.
ಈ ಎಲ್ಲಾ ಗುಣಗಳು ಎಲ್ಲಾ ವರ್ಣದವರಲ್ಲೂ ಇರಬೇಕು. ಆದರೆ ಹೆಚ್ಚಿನ ಪ್ರಮಾಣದಲ್ಲಿರುವುದು ಬ್ರಾಹ್ಮಣ ವರ್ಣದವರಲ್ಲಿ. ಇವುಗಳಲ್ಲಿ ಒಂದು ಗುಣದ ಪ್ರಮಾಣ ಕಡಿಮೆ ಇದ್ದರೂ ಆತ ಬ್ರಾಹ್ಮಣನೆನಿಸುವುದಿಲ್ಲ. ಒಂದು ವೇಳೆ ಕ್ಷತ್ರಿಯರಲ್ಲಿ ಈ ಗುಣಗಳ ಪ್ರಮಾಣ ಬ್ರಾಹ್ಮಣರಿಗಿಂತ ಹೆಚ್ಚಾಗಿ ಕಂಡುಬಂದರೆ ಆತ ರಾಜರ್ಷಿ ಎನಿಸುತ್ತಾನೆ. (ಉದಾಹರಣೆಗೆ ಜನಕ ಮಹಾರಾಜ)

ಶೌರ್ಯಂ ತೇಜೋ ಧೃತಿರ್ದಾಕ್ಷ್ಯಂ ಯುದ್ಧೇ ಚಾಪ್ಯಪಲಾಯನಮ್ ।
ದಾನಮೀಶ್ವರಭಾವಶ್ಚ ಕ್ಷಾತ್ರಂ ಕರ್ಮ ಸ್ವಭಾವಜಮ್ ॥೪೩॥

ಶೌರ್ಯಂ ತೇಜಃ ಧೃತಿಃ ದಾಕ್ಷ್ಯಮ್ ಯುದ್ಧೇ ಚ ಅಪಿ ಅಪಲಾಯನಮ್ ।
ದಾನಮ್ ಈಶ್ವರ ಭಾವಃ ಚ ಕ್ಷಾತ್ರಮ್ ಕರ್ಮ ಸ್ವಭಾವಜಮ್ -- ಕೆಚ್ಚು, ಕಸುವು, ಗಟ್ಟಿತನ, ಕೌಶಲ, ಕಾಳಗದಲ್ಲಿ ಬೆನ್ನು ತೋರಿಸದಿರುವುದು, ಕೊಡುಗೈತನ ಮತ್ತು ಒಡೆತನ ಇವು ಕ್ಷತ್ರಿಯ ಸ್ವಭಾವದ ಸಹಜ ಕರ್ಮಗಳು.

ಕ್ಷತ್ರಿಯನಾದವನ ಸಹಜ ಕರ್ಮಗಳನ್ನು ಇಲ್ಲಿ ಕೃಷ್ಣ ವಿವರಿಸಿದ್ದಾನೆ.
(೧) ಶೌರ್ಯಮ್ : ಎದುರಾಳಿಗಳನ್ನು ಬಗ್ಗುಬಡಿಯುವ ಶಕ್ತಿ.
(೨) ತೇಜಸ್ಸು : ಎದುರಾಳಿಗಳು ನೋಡಿದಾಕ್ಷಣ ತಲೆ ತಗ್ಗಿಸುವ ತೇಜಸ್ಸು.
(೩) ಧೃತಿ : ಪ್ರಾಣಾಪಾಯ ಬಂದಾಗಲೂ ಎದೆಗೆಡದೆ ಮುನ್ನುಗ್ಗುವ ಸಾಹಸ ಪ್ರವೃತ್ತಿ
(೪) ದಕ್ಷತೆ: ಶತ್ರುಗಳನ್ನು ಮಣಿಸುವ ತಂತ್ರಗಾರಿಕೆ-ಚಾತುರ್ಯ.
(೫) ಯುದ್ಧೇ ಚ ಅಪಿ ಅಪಲಾಯನಮ್ : ಯುದ್ಧ ಭೂಮಿಯಲ್ಲಿ ಬೆನ್ನು ಹಾಕದೆ, ಪಲಾಯನ ಮಾಡದೆ ಹೋರಾಡುವ ಧೀರತನ.
(೬) ದಾನಮ್: ದಾನ ಧರ್ಮ ಮಾಡುವುದು.
ಈ ಮೇಲಿನ ಆರು ಗುಣಗಳು ಕ್ಷತ್ರಿಯನಲ್ಲಿ ಹೆಚ್ಚಿನ ಪ್ರಮಾಣದಲ್ಲಿರುತ್ತದೆ. ಇತರ ವರ್ಣದವರಲ್ಲಿ ಇದು ಕಡಿಮೆ ಪ್ರಮಾಣದಲ್ಲಿರುತ್ತದೆ. ಇದಲ್ಲದೆ ಕ್ಷತ್ರಿಯರಿಗೇ ಮೀಸಲಾದ ಒಂದು ವಿಶೇಷ ಗುಣ (೭) ಈಶ್ವರ ಭಾವಃ : ಅಪರಾಧಿಗೆ ಸೂಕ್ತ ಶಿಕ್ಷೆ ಕೊಡುವ ಅಧಿಕಾರ. ಬೇರೆ ವರ್ಣದವರಿಗೆ ಈ ಅಧಿಕಾರವಿಲ್ಲ.

ಕೃಷಿಗೋರಕ್ಷ್ಯವಾಣಿಜ್ಯಂ ವೈಶ್ಯಕರ್ಮ ಸ್ವಭಾವಜಮ್ ।
ಪರಿಚರ್ಯಾತ್ಮಕಂ ಕರ್ಮ ಶೂದ್ರಸ್ಯಾಪಿ ಸ್ವಭಾವಜಮ್ ॥೪೪॥

ಕೃಷಿ ಗೋರಕ್ಷ್ಯವಾಣಿಜ್ಯಂ ವೈಶ್ಯಕರ್ಮ ಸ್ವಭಾವಜಮ್ ।
ಪರಿಚರ್ಯಾತ್ಮಕಂ ಕರ್ಮ ಶೂದ್ರಸ್ಯ ಅಪಿ ಸ್ವಭಾವಜಮ್ -- ಬೇಸಾಯ, ಆಕಳು ಸಾಕಣೆ ಮತ್ತು ವ್ಯಾಪಾರ ವೈಶ್ಯರ ಸ್ವಭಾವಸಹಜವಾದ ಕರ್ಮ. ಸೇವಾರೂಪವಾದ ಕಾಯಕ ಶೂದ್ರ ಸ್ವಭಾವಕ್ಕೆ ಸಹಜವಾದದ್ದು.

ವೈಶ್ಯರ ಸ್ವಭಾವಸಹಜ ಕಾಯಕ ಕೃಷಿ, ಗೋರಕ್ಷಣೆ(ಹೈನುಗಾರಿಕೆ) ಮತ್ತು ವಾಣಿಜ್ಯ. ಭೀಷ್ಮಾಚಾರ್ಯರು ಧರ್ಮರಾಯನಿಗೆ ರಾಜಧರ್ಮ ಉಪದೇಶ ಮಾಡುತ್ತಾ "ಯಾವ ದೇಶದಲ್ಲಿ ಕೃಷಿಕರು ಮತ್ತು ವಾಣಿಜ್ಯೋದ್ಯಮಿಗಳು ಕರಭಾರ ತಡೆಯಲಾಗದೆ ಬೇರೆ ದೇಶಕ್ಕೆ ಹೊರಟು ಹೋಗುತ್ತಾರೋ- ಆ ದೇಶ

ಉದ್ಧಾರವಾಗದು" ಎಂದಿದ್ದಾರೆ. ಕೃಷಿ, ವಾಣಿಜ್ಯ ಮತ್ತು ಹೈನುಗಾರಿಕೆ ದೇಶದ ಬೆನ್ನೆಲುಬು. ಈ ಕಾಯಕ ವೈಶ್ಯರ ಸ್ವಭಾವಸಹಜವಾದ ಕರ್ಮ.

ಶೂದ್ರರಲ್ಲಿ ಇನ್ನೊಬ್ಬರ ಸೇವೆ ಮಾಡುವ ಸೇವಾ ಗುಣ ಮಹತ್ವವಾಗಿರುತ್ತದೆ. ಈ ಗುಣ ಇಲ್ಲದವ ಮನುಷ್ಯನೇ ಅಲ್ಲ. ಯಾರೂ ಏಕವರ್ಣದವನಲ್ಲ. ಎಲ್ಲರಲ್ಲೂ ಎಲ್ಲಾ ಸ್ವಭಾವವಿರುತ್ತದೆ. ಯಾವ ಸ್ವಭಾವ ನಮ್ಮಲ್ಲಿ ಹೆಚ್ಚಾಗಿದೆಯೋ(Majority) ನಾವು ಆ ವರ್ಣಕ್ಕೆ ಸೇರುತ್ತೇವೆ. ಶೂದ್ರ ಸ್ವಭಾವ ಎಷ್ಟು ಮುಖ್ಯ ಎಂದರೆ ಈ ಸ್ವಭಾವ ಇಲ್ಲದೆ ಬೇರೆ ಸ್ವಭಾವಕ್ಕೆ ಬೆಲೆ ಇಲ್ಲ. ಯಾವಾಗಲೂ ನಾವು ಮಾಡುವ ಕರ್ಮವನ್ನು ಸೇವಾ ಮನೋವೃತ್ತಿಯಿಂದ ಮಾಡಬೇಕು. ಉದಾಹರಣೆಗೆ: ಬ್ರಾಹ್ಮಣನಾದವನು ಸಮಾಜ ಸೇವೆಯ ಭಾವನೆಯಿಂದ ಜ್ಞಾನದಾನ ಮಾಡಬೇಕು. ಇಲ್ಲದಿದ್ದರೆ ಅದು ಜ್ಞಾನದಾನವೆನಿಸುವುದಿಲ್ಲ.

ವರ್ಣದ ಬಗ್ಗೆ ಕೃಷ್ಣ ಬಹಳ ರೋಚಕವಾದ ವಿವರಣೆಯನ್ನು ಕೊಟ್ಟ. ಸಮಾಜದಲ್ಲಿ ಮತ್ತು ಕೆಲವು ಪ್ರಾಚೀನ ಗ್ರಂಥಗಳಲ್ಲಿ ವರ್ಣವನ್ನು ಜಾತಿ ಎನ್ನುವ ಶಬ್ದದಿಂದ ಮತ್ತು ಜಾತಿಯನ್ನು ವರ್ಣ ಎನ್ನುವ ಶಬ್ದದಿಂದ ಬಳಸಿರುವುದನ್ನು ಕಾಣುತ್ತೇವೆ. ಇಂತಹ ಸಂದರ್ಭದಲ್ಲಿ ನಾವು ಗೊಂದಲ ಮಾಡಿಕೊಳ್ಳದೆ, ಅಲ್ಲಲ್ಲಿ ಯಾವ ಅರ್ಥದಲ್ಲಿ ಹೇಳಲಾಗಿದೆ ಎನ್ನುವುದನ್ನು ತಿಳಿದು, ಅದನ್ನು ಅರ್ಥ ಮಾಡಿಕೊಳ್ಳಬೇಕಾಗುತ್ತದೆ. ಉದಾಹರಣೆಗೆ "ವರ್ಣ ಪದ್ಧತಿಯನ್ನು ನನ್ನ ಆಡಳಿತದಲ್ಲಿ ನಾನು ಹೇಗೆ ಪಾಲಿಸಬೇಕು" ಎಂದು ಪ್ರಶ್ನೆ ಮಾಡಿದ ಧರ್ಮರಾಯನಿಗೆ ಭೀಷ್ಮಾಚಾರ್ಯರು ಹೇಳುತ್ತಾರೆ: "ವರ್ಣ ವಿಭಾಗವೇ ಇಲ್ಲ, ಎಲ್ಲರೂ ದೇವರ ಮಕ್ಕಳು, ರಾಜನಾದವನಿಗೆ ವರ್ಣಭೇದ ಮಾಡುವ ಅಧಿಕಾರವಿಲ್ಲ" ಎಂದು. ಇಲ್ಲಿ ವರ್ಣ ಎನ್ನುವುದು ಜಾತಿ ಎನ್ನುವ ಅರ್ಥದಲ್ಲಿ ಬಳಕೆಯಾಗಿದೆ.

ಸಾಮಾನ್ಯವಾಗಿ ಸಮಾಜದಲ್ಲಿ ತಂದೆ/ತಾಯಿಯ ಸ್ವಭಾವ ಯಾವುದಿರುತ್ತದೋ ಅದೇ ಸ್ವಭಾವವನ್ನು ಮಕ್ಕಳು ಅನುಸರಿಸುತ್ತಾರೆ. ಉದಾಹರಣೆಗೆ: ಒಬ್ಬ ಬ್ರಾಹ್ಮಣನ ಮಗ, ಅವನಿಗೆ ಬ್ರಾಹ್ಮಣ ಸ್ವಭಾವವನ್ನು ಅನುಸರಿಸುವುದು ಸುಲಭವಾಗುತ್ತದೆ. ಆತ ಅದನ್ನೇ ಅನುಸರಿಸಿಕೊಂಡು ಬೆಳೆಯುತ್ತಾನೆ. ಹೀಗಾದಾಗ ನಿಜವಾದ ವರ್ಣವನ್ನು ಗುರುತಿಸುವುದು ಕಷ್ಟವಾಗುತ್ತದೆ. ಹೀಗೆ ವರ್ಣವನ್ನು ಗುರುತಿಸಲು ಕಷ್ಟವಾದಾಗ ಬಂದ ಪದ್ಧತಿ ಜಾತಿಪದ್ಧತಿ. ಜಾತಿ ಬೇರೆ ವರ್ಣ ಬೇರೆ ಎನ್ನುವುದಕ್ಕೆ ಉತ್ತಮ ಉದಾಹರಣೆ- ಒಬ್ಬ ಬೆಸ್ತರ ಹುಡುಗಿಯಲ್ಲಿ ಹುಟ್ಟಿದ ವೇದವ್ಯಾಸರು. ಅವರು ಮಹಾಬ್ರಾಹ್ಮಣ ಎನ್ನುವುದನ್ನು ಪ್ರಪಂಚವೇ ಒಪ್ಪಿದೆ.

ಇಂದು ಸಮಾಜದಲ್ಲಿ ಜೀವ ಸ್ವಭಾವವನ್ನು ಗುರುತಿಸಿ ಅದಕ್ಕನುಗುಣವಾದ ಕರ್ಮವನ್ನು ಮಾಡುವ ಪದ್ಧತಿ ಇಲ್ಲವಾಗಿದೆ. ಇದಕ್ಕೆ ವ್ಯತಿರಿಕ್ತವಾಗಿ ತಂದೆ-ತಾಯಿ ತಮ್ಮ ಇಷ್ಟವನ್ನು ತಮ್ಮ ಮಕ್ಕಳ ಮೇಲೆ ಹೇರುತ್ತಿದ್ದಾರೆ. ಇದು ತೀರಾ ಅವೈಜ್ಞಾನಿಕ ಪದ್ಧತಿ. ಮಕ್ಕಳಲ್ಲಿ ಹುದುಗಿರುವ ನಿಜವಾದ ಪ್ರತಿಭೆಯನ್ನು ಗುರುತಿಸದೆ, ತಾವು ಹೇಳಿದ ವಿಷಯವನ್ನು ಮಕ್ಕಳು ಕಲಿಯಬೇಕು ಎನ್ನುವುದು ವರ್ಣಪದ್ಧತಿಗೆ ವಿರುದ್ಧವಾದ ಸಂಪ್ರದಾಯ. ಅವರವರ ಜೀವ ಸ್ವಭಾವ ಏನೋ ಅದಕ್ಕನುಗುಣವಾಗಿ ಅವರು ಕಲಿಯಬೇಕು. ಆಗ ಅವರು ಆ ವಿಷಯದಲ್ಲಿ ಪರಿಣತರಾಗುತ್ತಾರೆ ಮತ್ತು ಸಮಾಜಕ್ಕೆ ಅವರಿಂದ ಉಪಯೋಗವಾಗುತ್ತದೆ.

ಸ್ವೇ ಸ್ವೇ ಕರ್ಮಣ್ಯಭಿರತಃ ಸಂಸಿದ್ಧಿಂ ಲಭತೇ ನರಃ ।
ಸ್ವಕರ್ಮನಿರತಃ ಸಿದ್ಧಿಂ ಯಥಾ ವಿಂದತಿ ತಚ್ಛೃಣು ॥೪೫॥

ಸ್ವೇ ಸ್ವೇ ಕರ್ಮಣಿ ಅಭಿರತಃ ಸಂಸಿದ್ಧಿಂ ಲಭತೇ ನರಃ ।
ಸ್ವಕರ್ಮನಿರತಃ ಸಿದ್ಧಿಂ ಯಥಾ ವಿಂದತಿ ತತ್ ಶೃಣು -- ತನ್ನತನ್ನ ಸಹಜ ಕರ್ಮದಲ್ಲಿ ನಿರತನಾದ ಮನುಷ್ಯ ಸಿದ್ಧಿಯನ್ನು ಪಡೆಯುತ್ತಾನೆ. ತನ್ನದಾದ ಕರ್ಮದಲ್ಲಿ ತೊಡಗಿದವನು ಹೇಗೆ ಸಿದ್ಧಿ ಪಡೆಯುತ್ತಾನೆ ಆ ಬಗೆಯನ್ನು ಕೇಳು.

ಅವರವರ ಸ್ವಭಾವಕ್ಕೆ ಅನುಗುಣವಾದ ಕರ್ಮವನ್ನು ಕೃಷ್ಣ 'ಸ್ವಕರ್ಮ' ಎಂದು ಕರೆದಿದ್ದಾನೆ. 'ನಿನ್ನ ಕರ್ಮ ನೀನು ಮಾಡು' ಎಂದರೆ ನಿನ್ನ ಸ್ವಭಾವಕ್ಕೆ ಒಗ್ಗುವ ಕರ್ಮವನ್ನು ನೀನು ಮಾಡು ಎಂದರ್ಥ. ಪ್ರಾಮಾಣಿಕತೆ ಮತ್ತು ಸ್ವಕರ್ಮನಿಷ್ಠೆಗಿಂತ ದೊಡ್ಡ ಧರ್ಮ ಇನ್ನೊಂದಿಲ್ಲ. ತನ್ನ ಸ್ವಭಾವಕ್ಕೆ ಸಹಜವಾದ ಕರ್ಮವನ್ನು ಭಗವದರ್ಪಣಾ ಬುದ್ಧಿಯಿಂದ ಮಾಡುತ್ತಾ ಪ್ರಾಮಾಣಿಕವಾಗಿ ಬದುಕುವುದೇ ಎಲ್ಲಕ್ಕಿಂತ ಶ್ರೇಷ್ಠ ಧರ್ಮ.
ನಮ್ಮಲ್ಲಿ ಕೆಲವರು ಕೇಳಬಹುದು: "ಯಾವ ಕೆಲಸವಾದರೇನು, ಯಾವುದರಿಂದ ಹೆಚ್ಚು ಹಣ ಸಂಪಾದನೆ ಸಾಧ್ಯವೋ ಆ ಕೆಲಸವನ್ನು ಮಾಡುವುದರಲ್ಲಿ ತಪ್ಪೇನು" ಎಂದು. ಇಲ್ಲಿ ಕೃಷ್ಣ ಅದು ತಪ್ಪು ಎಂದಿದ್ದಾನೆ. ಯಾವುದೋ ಒಂದು ಕೆಲಸ ಮಾಡುವುದು ಬದುಕಲ್ಲ, ಅದು ಯಾತನೆ. ನಿನ್ನನಿನ್ನ ಸ್ವಭಾವಸಹಜವಾದ ಕರ್ಮದಲ್ಲಿ ನೀನು ಬದುಕಿದರೆ ಅದು ಬದುಕು. ಅದೇ ಮೋಕ್ಷ ಮಾರ್ಗ. ನಿನ್ನ ಸ್ವಭಾವಕ್ಕೆ ತಕ್ಕಂತೆ ನಿನ್ನ ಶಿಕ್ಷಣ; ನಿನ್ನ ಶಿಕ್ಷಣಕ್ಕೆ ತಕ್ಕಂತೆ ನಿನ್ನ ಕರ್ಮ. ಹೀಗೆ ಮಾಡಿದಾಗ ಕರ್ಮದಲ್ಲಿ ಅಭಿರತಿ(ಸಂಪೂರ್ಣ ತೃಪ್ತಿ ಮತ್ತು ಸಂತೋಷ) ಇರುತ್ತದೆ. ಈ ರೀತಿ ಖುಷಿಯಿಂದ ಭಗವದರ್ಪಣೆಯಾಗಿ ಕರ್ಮ ಮಾಡಿದಾಗ, ಬದುಕಿನ ಕೊನೆಯ ಸಿದ್ಧಿಯಾದ ಮೋಕ್ಷವನ್ನು ಪಡೆಯಬಹುದು. ಸ್ವಭಾವ ಸಹಜವಾದ ಕರ್ಮದಿಂದ ಹೇಗೆ ಸಿದ್ಧಿಯಾಗುತ್ತದೆ ಎನ್ನುವುದನ್ನು ಕೃಷ್ಣ ಮುಂದಿನ ಶ್ಲೋಕಗಳಲ್ಲಿ ವಿವರಿಸಿದ್ದಾನೆ.

ಯತಃ ಪ್ರವೃತ್ತಿರ್ಭೂತಾನಾಂ ಯೇನ ಸರ್ವಮಿದಂ ತತಮ್ ।
ಸ್ವಕರ್ಮಣಾ ತಮಭ್ಯರ್ಚ್ಯ ಸಿದ್ಧಿಂ ವಿಂದತಿ ಮಾನವಃ ॥೪೬॥

ಯತಃ ಪ್ರವೃತ್ತಿಃ ಭೂತಾನಾಂ ಯೇನ ಸರ್ವಮ್ ಇದಂ ತತಮ್ ।
ಸ್ವಕರ್ಮಣಾ ತಮ್ ಅಭ್ಯರ್ಚ್ಯ ಸಿದ್ಧಿಂ ವಿಂದತಿ ಮಾನವಃ -- ಯಾರಿಂದ ಜೀವಿಗಳ ಚಟುವಟಿಕೆಯೋ, ಯಾರು ಈ ಎಲ್ಲವನ್ನು ತುಂಬಿನಿಂತಿರುವನೋ ಅಂತಹ ಭಗವಂತನನ್ನು ಮನುಷ್ಯ ಸ್ವಭಾವಸಹಜವಾದ ಕರ್ಮದಿಂದ ಆರಾಧಿಸಿ ಸಿದ್ಧಿ ಪಡೆಯುತ್ತಾನೆ.

ನಮ್ಮ ಸ್ವಭಾವ ಸಹಜ ಕರ್ಮವನ್ನು ಭಗವಂತನ ಅಭ್ಯರ್ಚನೆಯಾಗಿ ಮಾಡಿದಾಗ ಅದು ಅಧ್ಯಾತ್ಮವಾಗುತ್ತದೆ. ಇದಕ್ಕಿಂತ ಮಹತ್ತಾದ ಪೂಜೆ ಇನ್ನೊಂದಿಲ್ಲ. ಇಲ್ಲಿ ಅರ್ಚನೆ ಎಂದರೆ ಪುರೋಹಿತರ ಮುಖೇನ ದೇವಸ್ಥಾನದಲ್ಲಿ ಮಾಡುವ ಅರ್ಚನೆ ಅಲ್ಲ. ಇದು ಇಂದ್ರಿಯ ನಿಗ್ರಹ, ಶಮಃ, ದಮಃ ಎಲ್ಲವೂ ಸೇರಿ ಸ್ವಯಂ ಮಾಡತಕ್ಕ ಅರ್ಚನೆ. ಆದ್ದರಿಂದ ನಾವು ಮಾಡುವ ಸ್ವಭಾವ ಸಹಜ ಕರ್ಮದಲ್ಲಿ ನಮ್ಮ ಇಂದ್ರಿಯ ನಿಗ್ರಹ ಸೇರಿದೆ, ಭಗವನ್ನಿಷ್ಠೆ ಸೇರಿದೆ, ಭಗವದರ್ಪಣಾ ಬುದ್ಧಿ ಸೇರಿದೆ. ಇವೆಲ್ಲವೂ ಸೇರಿ ನಾವು ಮಾಡತಕ್ಕ ಪ್ರತಿಯೊಂದು ಸ್ವಕರ್ಮ/ಸಹಜಕರ್ಮ ಭಗವಂತನ ಪೂಜೆಯಾಗುತ್ತದೆ. ಈ ರೀತಿ ಬದುಕಿದಾಗ ನಮ್ಮ ಇಡೀ ಬದುಕು ದೇವರ ಪೂಜೆಯಾಗುತ್ತದೆ. ನಮಗೆ ಇಚ್ಛೆ ಮತ್ತು  ಪ್ರವೃತ್ತಿಯನ್ನು ಕೊಟ್ಟ ಭಗವಂತನಿಗೆ ನಮ್ಮ ಕರ್ಮವನ್ನು ಅರ್ಪಿಸಿದಾಗ ನಮ್ಮ ಕರ್ಮವೇ ಒಂದು ಅರ್ಚನೆಯಾಗುತ್ತದೆ.

ಶ್ರೇಯಾನ್ ಸ್ವಧರ್ಮೋ ವಿಗುಣಃ ಪರಧರ್ಮಾತ್ ಸ್ವನುಷ್ಠಿತಾತ್ ।
ಸ್ವಭಾವನಿಯತಂ ಕರ್ಮ ಕುರ್ವನ್ ನಾSಪ್ನೋತಿ ಕಿಲ್ಬಿಷಮ್ ॥೪೭॥

ಶ್ರೇಯಾನ್ ಸ್ವಧರ್ಮಃ ವಿಗುಣಃ ಪರಧರ್ಮಾತ್ ಸು ಅನುಷ್ಠಿತಾತ್ ।
ಸ್ವಭಾವ ನಿಯತಂ ಕರ್ಮ ಕುರ್ವನ್ ನ ಆಪ್ನೋತಿ ಕಿಲ್ಬಿಷಮ್ -- ಚೆನ್ನಾಗಿ ಆಚರಿಸಿದ ಪರಧರ್ಮಕ್ಕಿಂತ ಆಚರಣೆಯಲ್ಲಿ ಕೊರತೆಯಿದ್ದರೂ ತನ್ನ ಸಹಜಧರ್ಮ ಮಿಗಿಲು. ತನ್ನ ಸ್ವಭಾವಕ್ಕೆ ತಕ್ಕುದಾದ ಕರ್ಮ ಮಾಡಿದರೆ ಪಾಪ ತಟ್ಟುವುದಿಲ್ಲ.

ನಮ್ಮ ಸ್ವಭಾವಕ್ಕೆ ಸಹಜವಾದ ಸ್ವಧರ್ಮ ಮಾಡುವುದರಿಂದ, ಆ ಕರ್ಮದಲ್ಲಿ ದೋಷವಿದ್ದರೂ ಕೂಡಾ ಅದರಿಂದ ಪಾಪ ತಟ್ಟುವುದಿಲ್ಲ. ಇದನ್ನು ಬಿಟ್ಟು ಪರಧರ್ಮ ಮಾಡುವುದು ಯುಕ್ತವಲ್ಲ. ವೇದವ್ಯಾಸರು ಯುದ್ಧಾನಂತರ ತಾನು ಸಿಂಹಾಸನವೇರಲಾರೆ, ನನಗೇನೂ ಬೇಡ, ನಾನು ಕಾಡಿಗೆ ಹೋಗುತ್ತೇನೆ ಎಂದು ಕುಳಿತ ಧರ್ಮರಾಯನಿಗೆ- "ನೀನು ನಿನ್ನ ಸಹಜ ಧರ್ಮವನ್ನು ಬಿಟ್ಟು ಕಾಡಿಗೆ ಹೋಗುವುದು ಎಷ್ಟು ಅಸಂಗತವೋ, ಅಷ್ಟೇ ಅಸಂಗತ ನಾನು ತಪಸ್ಸನ್ನು ಬಿಟ್ಟು ಬಂದು ರಾಜ್ಯಭಾರ ಮಾಡುವುದು" ಎಂದು ಬುದ್ಧಿವಾದ ಹೇಳುತ್ತಾರೆ. ಇದರಿಂದ ನಾವು ತಿಳಿಯಬೇಕಾದದ್ದು ಏನೆಂದರೆ -ನಾವು ಪರಧರ್ಮ ಮಾಡುವುದಕ್ಕಿಂತ-ದೋಷವಿದ್ದರೂ ಸರಿ, ನಮ್ಮ ಸಹಜ ಕರ್ಮ ಮಾಡುವುದೇ ಅತ್ಯಂತ ಶ್ರೇಷ್ಠ ಧರ್ಮ.

ಸಹಜಂ ಕರ್ಮ ಕೌಂತೇಯ ಸದೋಷಮಪಿ ನ ತ್ಯಜೇತ್ ।
ಸರ್ವಾರಂಭಾ ಹಿ ದೋಷೇಣ ಧೂಮೇನಾಗ್ನಿರಿವಾSವೃತಾಃ ॥೪೮॥

ಸಹಜಂ ಕರ್ಮ ಕೌಂತೇಯ ಸದೋಷಮ್ ಅಪಿ ನ ತ್ಯಜೇತ್ ।
ಸರ್ವಾರಂಭಾಃ ಹಿ ದೋಷೇಣ ಧೂಮೇನ ಅಗ್ನಿಃ ಇವ ಆವೃತಾಃ -- ಕೌಂತೇಯಾ, ಸಹಜವಾದ ಕರ್ಮವನ್ನು ದೋಷವಿದ್ದರೂ ಬಿಡಬಾರದು. ಎಲ್ಲಾ ಕರ್ಮಗಳಲ್ಲು ದೋಷವಿದ್ದೇ ಇದೆ. ಬೆಂಕಿಯಿದ್ದಲ್ಲಿ ಹೊಗೆ ಇರುವಂತೆ.

ನಾವು ನಮ್ಮ ಸ್ವಭಾವಕ್ಕೆ ಮತ್ತು ಪರಿಸ್ಥಿತಿಗೆ ಸಹಜವಾದ ಕರ್ಮದಲ್ಲಿ ಎಷ್ಟೇ ದೋಷವಿದ್ದರೂ ಸಹ ಆ ಕರ್ಮವನ್ನು ಬಿಡಬಾರದು. ಇಲ್ಲಿ ಪಾಂಡವರ ಸಹಜ ಧರ್ಮ ಅನ್ಯಾಯದ ವಿರುದ್ಧ ಹೋರಾಡುವುದು. ಹೀಗೆ ಹೋರಾಡುವಾಗ ಸಾವು ನೋವು ಉಂಟಾಗಬಹುದು. ಆದರೆ ಅದು ಪಾಪವಲ್ಲ. ಈ ಪ್ರಪಂಚದಲ್ಲಿ ದೋಷವಿಲ್ಲದ ಒಂದೂ ಕರ್ಮವಿಲ್ಲ. ಬೆಂಕಿ ಇದ್ದಲ್ಲಿ ಹೊಗೆ ಇದ್ದೇ ಇರುತ್ತದೆ. ಕರ್ಮದಲ್ಲಿ ಹಿಂಸೆ ಇರಬಹುದು, ಆದರೆ ಅದು ಸಹಜ ಧರ್ಮವಾದಾಗ ಅದನ್ನು ಕೈಬಿಡಲಾಗದು. ಸಹಜ ಧರ್ಮದಲ್ಲಿ ಹಿಂಸೆ ಅನಿವಾರ್ಯವಾದಾಗ ಅದರ ಬಗ್ಗೆ ತಲೆಕೆಡಿಸಿಕೊಳ್ಳಬಾರದು. ನಮ್ಮ ಪಾಲಿಗೆ ಒದಗಿ ಬರುವ ಕರ್ಮವನ್ನು ಭಗವದರ್ಪಣಾ ಬುದ್ಧಿಯಿಂದ ನಿಷ್ಕಾಮನಾಗಿ ಮಾಡುವುದು ಧರ್ಮ. ಇದರಿಂದ ಪಾಪ ಅಂಟದು.

ಕೇವಲ ಸ್ವಭಾವದಂತೆ ನಡೆದುಕೊಂಡಮಾತ್ರಕ್ಕೆ ಮುಕ್ತಿ ಸಿಗುವುದಿಲ್ಲ. ಅದರ ಹಿಂದೆ ಕೆಲವು ಸಾಧನೆಗಳು ಬೇಕಾಗುತ್ತದೆ. ಕೆಲವು ಅನುಸಂಧಾನಗಳು ಬೇಕಾಗುತ್ತವೆ. ಅದರ ವಿವರಣೆಯನ್ನು ಕೃಷ್ಣ ಮುಂದಿನ ಶ್ಲೋಕಗಳಲ್ಲಿ ವಿವರಿಸಿದ್ದಾನೆ.

ಅಸಕ್ತಬುದ್ಧಿಃ ಸರ್ವತ್ರ ಜಿತಾತ್ಮಾ ವಿಗತಸ್ಪೃಹಃ ।
ನೈಷ್ಕರ್ಮ್ಯಸಿದ್ಧಿಂ ಪರಮಾಂ ಸಂನ್ಯಾಸೇನಾಧಿಗಚ್ಛತಿ ॥೪೯॥

ಅಸಕ್ತಬುದ್ಧಿಃ ಸರ್ವತ್ರ ಜಿತಾತ್ಮಾ ವಿಗತಸ್ಪೃಹಃ ।
ನೈಷ್ಕರ್ಮ್ಯಸಿದ್ಧಿಂ ಪರಮಾಂ ಸಂನ್ಯಾಸೇನ ಅಧಿಗಚ್ಛತಿ –ಎಲ್ಲೂ ಬುದ್ಧಿಯನ್ನು ಅಂಟಿಸಿಕೊಳ್ಳದೆ , ಬಗೆಯನ್ನು ಗೆದ್ದು, ಬಯಕೆ ತೊರೆದವನು ಇಂತಹ 'ಸಂನ್ಯಾಸ'ದಿಂದ ಮೋಕ್ಷಪ್ರದವಾದ ಹಿರಿಯ ಯೋಗ ಸಿದ್ಧಿಯನ್ನು [ಅನಿಷ್ಟ ಕರ್ಮಗಳ ನಾಶವೆಂಬ ಸಿದ್ಧಿಯನ್ನು] ಪಡೆಯುತ್ತಾನೆ.
ಮೋಕ್ಷಸಾಧನವಾಗಿರತಕ್ಕಂತಹ ಸಿದ್ಧಿಯನ್ನು[ಪಾಪಕರ್ಮಗಳು ಇಲ್ಲದ ಸ್ಥಿತಿಯನ್ನು] ತಲುಪಲು ಕೇವಲ ಸ್ವಕರ್ಮದಲ್ಲಿ ತೊಡಗಿದರೆ ಸಾಲದು, ಬದಲಿಗೆ ನಾವು ನಮ್ಮ ಮನಸ್ಸನ್ನು ನಿಯಂತ್ರಿಸಿ, ಯಾವುದೇ ಫಲಾಪೇಕ್ಷೆ ಇಲ್ಲದೆ, ನನ್ನಿಂದಾಯ್ತು ಎನ್ನುವ ಅಹಂಕಾರವನ್ನು ಬಿಟ್ಟು, ಭಗವದರ್ಪಣಾ ಭಾವದಿಂದ ಕರ್ಮವನ್ನು ಮಾಡಬೇಕು. ಅಹಂಕಾರ ಅಧ್ಯಾತ್ಮದ ದೊಡ್ಡ ಶತ್ರು. ಇದರ ಎಚ್ಚರ ನಮಗಿರಬೇಕು. ಒಟ್ಟಿನಲ್ಲಿ ಹೇಳಬೇಕೆಂದರೆ ಸರ್ವತ್ರ 'ನನ್ನಿಂದಾಯಿತು' ಎನ್ನುವ ಅಹಂಕಾರವನ್ನು ಬಿಟ್ಟು, ಮನಸ್ಸನ್ನು ಗೆದ್ದು, ಬುದ್ಧಿಯಿಂದ ಫಲಕಾಮನೆಯನ್ನು ತೊಡೆದುಹಾಕಿ, ಕಾಮನೆಗಳ ನ್ಯಾಸ ಮಾಡಿ, ಎಲ್ಲವನ್ನು ಭಗವಂತನಲ್ಲಿ ಅರ್ಪಿಸಿ ಸ್ವಕರ್ಮ ಮಾಡಿದರೆ- ಮೋಕ್ಷವನ್ನು ಸೇರಲು ಬೇಕಾದ ಸಿದ್ಧಿ ಪ್ರಾಪ್ತವಾಗುತ್ತದೆ.

ಸಿದ್ಧಿಂ ಪ್ರಾಪ್ತೋ ಯಥಾ ಬ್ರಹ್ಮ ತಥಾSSಪ್ನೋತಿ ನಿಬೋಧ ಮೇ ।
ಸಮಾಸೇನೈವ ಕೌಂತೇಯ ನಿಷ್ಠಾ ಜ್ಞಾನಸ್ಯ ಯಾ ಪರಾ ॥೫೦॥

ಸಿದ್ಧಿಂ ಪ್ರಾಪ್ತಃ ಯಥಾ ಬ್ರಹ್ಮ ತಥಾ ಆಪ್ನೋತಿ ನಿಬೋಧ ಮೇ ।
ಸಮಾಸೇನ ಏವ ಕೌಂತೇಯ ನಿಷ್ಠಾ ಜ್ಞಾನಸ್ಯ ಯಾ ಪರಾ – ಕೌಂತೇಯಾ, ಯಾವ ಬಗೆಯ ಸಿದ್ಧಿ ಪಡೆದವನು ಬ್ರಹ್ಮತತ್ವವನ್ನು[ಶ್ರೀತತ್ವವನ್ನು]ಸೇರುತ್ತಾನೆ ಆ ಬಗೆಯನ್ನು ಕೇಳು. ಈ ಸಿದ್ಧಿ ತಿಳಿವಿನ ಕೊನೆಯ ಮಜಲು.

ಯಾವ ಪಾತಕದಿಂದಲೂ ಕಲುಷಿತವಾಗದ ಜೀವನದ ನಡೆ(ನೈಷ್ಕರ್ಮ್ಯಸಿದ್ಧಿ) ರೂಪಿತವಾದಾಗ ನಮ್ಮ ಮನಸ್ಸಿನಲ್ಲಿ ಭಗವಂತ ಬಂದು ನೆಲೆಸುತ್ತಾನೆ. ಇದರಿಂದ ತಾಯಿ ಶ್ರಿಲಕ್ಷ್ಮಿಯನ್ನು ಸೇರಿ ಕೊನೆಗೆ ಭಗವಂತನನ್ನು ಸೇರಲು ಸಾಧ್ಯ. ಯಾವ ರೀತಿ ಬ್ರಹ್ಮತತ್ವವನ್ನು ಸೇರುವುದು ಎನ್ನುವುದನ್ನು ಮುಂದೆ ಕೃಷ್ಣ ಅಡಕವಾಗಿ ಹೇಳುತ್ತಾನೆ. ನೈಷ್ಕರ್ಮ್ಯಸಿದ್ಧಿ ಎನ್ನುವುದು ಒಬ್ಬ ಮನುಷ್ಯನ ಜ್ಞಾನಸಾಧನೆಯ ಕೊನೇಯ ಮಜಲು. ಈ ಹಂತವನ್ನು ತಲುಪಬೇಕಾದರೆ ನಾವು ಅಧ್ಯಾತ್ಮದಲ್ಲಿ ಕುಂತಿಯಂತೆ ಛಲವುಳ್ಳ-ಕೌಂತೇಯರಾಗಬೇಕು.

ಬುದ್ಧ್ಯಾ ವಿಶುದ್ಧಯಾ ಯುಕ್ತೋ ಧೃತ್ಯಾತ್ಮಾನಂ ನಿಯಮ್ಯ ಚ ।
ಶಬ್ದಾದೀನ್ ನ್ವಿಷಯಾಂಸ್ತ್ಯಕ್ತ್ವಾ ರಾಗದ್ವೇಷೌ ವ್ಯುದಸ್ಯ ಚ ॥೫೦॥

ಬುದ್ಧ್ಯಾ ವಿಶುದ್ಧಯಾ ಯುಕ್ತಃ ಧೃತ್ಯಾತ್ಮಾನಂ ನಿಯಮ್ಯ ಚ ।
ಶಬ್ದ ಆದೀನ್ ವಿಷಯಾನ್ ತ್ಯಕ್ತ್ವಾ ರಾಗದ್ವೇಷೌ ವ್ಯುದಸ್ಯ ಚ -- ತಿಳಿಯಾದ ಬುದ್ಧಿಯಿರಬೇಕು. ದಿಟ್ಟತನದಿಂದ ಬಗೆಯನ್ನು ಬಿಗಿಹಿಡಿಯಬೇಕು. ಶಬ್ದ ಮುಂತಾದ ವಿಷಯಲಾಲಸೆಯನ್ನು ತೊರೆಯಬೇಕು. ಪ್ರೀತಿ-ಹಗೆತನಗಳನ್ನು ದೂರವಿರಿಸಬೇಕು.

ಅಧ್ಯಾತ್ಮ ಸಾಧನೆಯಲ್ಲಿ ನಮ್ಮ ಮನಸ್ಸು ಯಾವತ್ತೂ ಕೂಡಾ ಕೆಟ್ಟದ್ದನ್ನು ಯೋಚಿಸಬಾರದು. ಶುದ್ಧವಾದ ಬುದ್ಧಿ ನಮ್ಮದಾಗಿರಬೇಕು. ಮನಸ್ಸನ್ನು ಬಹಳ ಧೈರ್ಯದಿಂದ ನಿಯಂತ್ರಿಸಿ, ಅಸಾಧಾರಣ ಸಾಹಸದಿಂದ ಎಲ್ಲಾ ಕೆಟ್ಟ ವಿಚಾರವನ್ನು ಮನಸ್ಸಿನಿಂದ ಹೊಡೆದೋಡಿಸಬೇಕು. ಇಂದ್ರಿಯಗಳು ಮನಸ್ಸನ್ನು ಕದಡುವ ಸಾಧನಗಳು. ಆದ್ದರಿಂದ ಕೇಳುವ, ನೋಡುವ, ಮುಟ್ಟುವ, ಮೂಸುವ ಮತ್ತು ತಿನ್ನುವ ಚಪಲವನ್ನು ಮೊದಲು ಬಿಡಬೇಕು. ಮಗುವಿನಂತೆ ರಾಗ-ದ್ವೇಷವಿಲ್ಲದೆ ನಿರ್ಮಲ ಮನಸ್ಸಿನಿಂದಿರಬೇಕು.

ವಿವಿಕ್ತಸೇವೀ ಲಘ್ವಾಶೀ ಯತವಾಕ್ ಕಾಯಮಾನಸಃ ।
ಧ್ಯಾನಯೋಗಪರೋ ನಿತ್ಯಂ ವೈರಾಗ್ಯಂ ಸಮುಪಾಶ್ರಿತಃ ॥೫೧॥

ವಿವಿಕ್ತಸೇವೀ ಲಘ್ವ ಆಶೀ ಯತ ವಾಕ್ ಕಾಯ ಮಾನಸಃ ।
ಧ್ಯಾನ ಯೋಗ ಪರಃ ನಿತ್ಯಂ ವೈರಾಗ್ಯಂ ಸಮುಪಾಶ್ರಿತಃ ---- ಏಕಾಂತದಲ್ಲಿ ನೆಲೆಸಬೇಕು. ಮಿತವಾಗಿ ಉಣ್ಣಬೇಕು. ಮಾತು-ಮೈ-ಮನಗಳಲ್ಲಿ ಹಿಡಿತವಿರಬೇಕು. ಧ್ಯಾನಯೋಗದಲ್ಲಿದ್ದು ಅನುದಿನವೂ ವೈರಾಗ್ಯ ತಳೆಯಬೇಕು.

ಹಾಳು ಹರಟೆ ನಡೆಯುವ ಜನಸಂದಣಿಯಲ್ಲಿ ಬೆರೆಯದೆ, ಆದಷ್ಟು ಏಕಾಂತದಲ್ಲಿರುವುದನ್ನು ಅಭ್ಯಾಸ ಮಾಡಿಕೊಳ್ಳಬೇಕು. ಅಧ್ಯಾತ್ಮ ಸಾಧನೆಯಲ್ಲಿ ಆದಷ್ಟು ಪವಿತ್ರವಾದ ಸ್ಥಳವನ್ನು ಆಯ್ಕೆ ಮಾಡಿಕೊಂಡು ಅಭ್ಯಾಸ ಮಾಡಬೇಕು. ಅತಿಯಾಗಿ ತಿಂದಾಗ ಮನಸ್ಸು ಕೆಲಸ ಮಾಡುವುದಿಲ್ಲ. ಅದಕ್ಕಾಗಿ ನಿಯತವಾದ ಸಮಯದಲ್ಲಿ ನಿಯತ ಆಹಾರವನ್ನು ಸೇವನೆ ಮಾಡಬೇಕು. ಮಾತಿನ ಮೇಲೆ ನಿಯಂತ್ರಣ, ದೇಹದ ಚಟುವಟಿಕೆಯ ಮೇಲೆ ನಿಯಂತ್ರಣ, ಮನಸ್ಸಿನ ಚಿಂತನೆಯಲ್ಲಿ ನಿಯಂತ್ರಣವಿದ್ದು  ಧ್ಯಾನ ಮಾಡಬೇಕು. ಜೀವನದಲ್ಲಿ ಎಲ್ಲವನ್ನು ಪ್ರೀತಿಸುತ್ತಾ ಯಾವುದನ್ನೂ ಅಂಟಿಸಿಕೊಳ್ಳದೇ ಬದುಕಬೇಕು.

ಅಹಂಕಾರಂ ಬಲಂ ದರ್ಪಂ ಕಾಮಂ ಕ್ರೋಧಂ ಪರಿಗ್ರಹಮ್ ।
ವಿಮುಚ್ಯ ನಿರ್ಮಮಃ ಶಾಂತೋ ಬ್ರಹ್ಮಭೂಯಾಯ ಕಲ್ಪತೇ ॥೫೩॥

ಅಹಂಕಾರಂ ಬಲಂ ದರ್ಪಂ ಕಾಮಂ ಕ್ರೋಧಂ ಪರಿಗ್ರಹಮ್ ।
ವಿಮುಚ್ಯ ನಿರ್ಮಮಃ ಶಾಂತಃ ಬ್ರಹ್ಮಭೂಯಾಯ ಕಲ್ಪತೇ --ನಾನೆಂಬ ಹಮ್ಮು, ಬಲಾತ್ಕಾರ, ಸೊಕ್ಕು, ಕಾಮ, ಕೋಪ ಮತ್ತು ಕೈಯೊಡ್ಡುವ ಬುದ್ಧಿ ಇವುಗಳನ್ನು ತೊರೆದು, ಮಮತೆಯಳಿದು ಭಗವಂತನಲ್ಲಿ ಬಗೆಯಿಡಬೇಕು. ಆಗ ಭಗವಂತನಲ್ಲೇ ಬಗೆ ನೆಲೆಗೊಳ್ಳುತ್ತದೆ.[ಅಂತವನು ಶ್ರೀತತ್ವವನ್ನು ಸೇರುತ್ತಾನೆ]
ಭಗವಂತನ ಚಿಂತನೆಗೆ ವಿರುದ್ಧವಾಗಿ 'ನಾನು ಮಾಡಿದೆ' ಅನ್ನುವ ಅಹಂಕಾರ, ಇನ್ನೊಬ್ಬರ ಮೇಲೆ ತಮ್ಮ ಅಭಿಪ್ರಾಯ ಹೇರುವುದು, ತನ್ನ ಸ್ಥಿತಿಯ ಬಗ್ಗೆ ದರ್ಪ, ಕಾಮ-ಕ್ರೋಧ, ಇನ್ನೊಬ್ಬರ ಮುಂದೆ ಕೈಯೊಡ್ಡುವ ಬುದ್ಧಿ- ಇವೆಲ್ಲವನ್ನು ತೊರೆದು, ನಾನು-ನನ್ನದು ಎನ್ನುವ ಮಮಕಾರವನ್ನು ಬಿಟ್ಟು, ಭಗವಂತನಲ್ಲಿ ಮನಸ್ಸನ್ನು ಏಕಾಗ್ರಗೊಳಿಸುವುದರಿಂದ ಬ್ರಹ್ಮತತ್ವವನ್ನು ಸೇರಬಹುದು. [ಮನಸ್ಸು ಭಗವಂತನಲ್ಲಿ ನೆಲೆಗೊಳ್ಳುತ್ತದೆ; ಚತುರ್ಮುಖನ ಉಪದೇಶ ಪಡೆದು- ತಾಯಿ ಲಕ್ಷ್ಮಿಯನ್ನು ಸೇರುತ್ತಾನೆ].

ಬ್ರಹ್ಮಭೂತಃ ಪ್ರಸನ್ನಾತ್ಮಾ ನ ಶೋಚತಿ ನ ಕಾಂಕ್ಷತಿ ।
ಸಮಃ ಸರ್ವೇಷು ಭೂತೇಷು ಮದ್ ಭಕ್ತಿಂ ಲಭತೇ ಪರಾಮ್ ॥೫೪॥

ಬ್ರಹ್ಮಭೂತಃ ಪ್ರಸನ್ನಾತ್ಮಾ ನ ಶೋಚತಿ ನ ಕಾಂಕ್ಷತಿ ।
ಸಮಃ ಸರ್ವೇಷು ಭೂತೇಷು ಮತ್ ಭಕ್ತಿಂ ಲಭತೇ ಪರಾಮ್ – ಭಗವಂತನಲ್ಲೇ ಬಗೆ ನೆಟ್ಟವನು [ಶ್ರೀತತ್ವದಲ್ಲಿ ನೆಲೆಗೊಂಡವನು] ಬಗೆ ತಿಳಿಗೊಂಡು ಯಾವುದಕ್ಕೂ ದುಃಖಿಸುವುದಿಲ್ಲ; ಯಾವುದನ್ನೂ ಬಯಸುವುದಿಲ್ಲ. ಎಲ್ಲಾ ಜೀವಿಗಳಲ್ಲೂ ಸಮಭಾವ ಹೊಂದಿ ನನ್ನಲ್ಲಿ ಪರಾಭಕ್ತಿಯನ್ನು ಪಡೆಯುತ್ತಾನೆ.

ಭಗವಂತನಲ್ಲಿ ಬಗೆ ನೆಟ್ಟವನಿಗೆ ಯಾವುದೇ ಬೇಕು-ಬೇಡಗಳಿರುವುದಿಲ್ಲ. ಆತನ ಮನಸ್ಸು ಸ್ವಚ್ಛವಾಗಿರುತ್ತದೆ. ಈ ಸ್ಥಿತಿಯಲ್ಲಿ ಸರ್ವೋತ್ಕೃಷ್ಟ ಭಕ್ತಿ ಬೆಳೆಯುತ್ತದೆ. ಗುಣಪೂರ್ಣನಾದ ಭಗವಂತನನ್ನು ಆತ ಪ್ರಪಂಚದ ಪ್ರತೀ ವಸ್ತುವಿನಲ್ಲೂ ಕಾಣುತ್ತಾನೆ. ಇದರಿಂದಾಗಿ ಆತನಲ್ಲಿ ಯಾವುದೇ ತಾರತಮ್ಯ, ದ್ವೇಷ ಇರುವುದಿಲ್ಲ.

ಭಕ್ತ್ಯಾ ಮಾಮಭಿಜಾನಾತಿ ಯಾವಾನ್ ಯಶ್ಚಾಸ್ಮಿ ತತ್ತ್ವತಃ ।
ತತೋ ಮಾಂ ತತ್ತ್ವತೋ ಜ್ಞಾತ್ವಾ ವಿಶತೇ ತದನಂತರಮ್ ॥೫೫॥

ಭಕ್ತ್ಯಾ ಮಾಮ್ ಅಭಿಜಾನಾತಿ ಯಾವಾನ್ ಯಃ ಚ ಅಸ್ಮಿ ತತ್ತ್ವತಃ ।
ತತಃ ಮಾಮ್ ತತ್ತ್ವತಃ ಜ್ಞಾತ್ವಾ ವಿಶತೇ ತತ್ ಅನಂತರಮ್ -ಭಕ್ತಿಯಿಂದ 'ನಾನು' ಏನು ಎಂತು ಎನ್ನುವುದನ್ನು ಸರಿಯಾಗಿ ಅರಿಯಬಲ್ಲವನಾಗುತ್ತಾನೆ. ಅಂತಹ ಪರಾಭಕ್ತಿಯಿಂದ ನನ್ನನ್ನು ಸರಿಯಾಗಿ ಅರಿತ ಅನಂತರ ನನ್ನನ್ನೇ ಸೇರುತ್ತಾನೆ.

ಇಂತಹ ಭಕ್ತಿಯ ಉತ್ಕೃಷ್ಟ ಸ್ಥಿತಿಯಲ್ಲಿರುವವನಿಗೆ ಯಾವುದೇ ತಪ್ಪು ತಿಳುವಳಿಕೆ ಇರುವುದಿಲ್ಲ. ಲಕ್ಷ್ಮಿಯ ಸನ್ನಿಧಾನದಿಂದ ಭಗವಂತ ಅಂದರೇನು, ಅವನ ಮಹಿಮೆ ಏನು, ಅವನ ಶಕ್ತಿ ಏನು, ಅವನ ಅನಂತ ಗುಣಗಳ ಹರವು ಏನು- ಎನ್ನುವುದು ಯಥಾವತ್ತಾಗಿ ಜೀವಯೋಗ್ಯತೆಯ ಪೂರ್ಣ ಪ್ರಮಾಣದಲ್ಲಿ ಅರಿಯುತ್ತಾನೆ. "ಈ ರೀತಿ ತತ್ತ್ವತಃ ಭಗವಂತನನ್ನು ಯಥಾವತ್ತಾಗಿ ತಿಳಿದ ಮೇಲೆ ಅತ್ಯಂತ ಪರಿಶುದ್ಧ ಜ್ಞಾನ ಮತ್ತು ಭಕ್ತಿಯಿಂದ ನನ್ನನ್ನು ಬಂದು ಸೇರುತ್ತಾನೆ" ಎನ್ನುತ್ತಾನೆ ಕೃಷ್ಣ.

ಸರ್ವಕರ್ಮಾಣ್ಯಪಿ ಸದಾ ಕುರ್ವಾಣೋ ಮದ್ ವ್ಯಪಾಶ್ರಯಃ ।
ಮತ್ ಪ್ರಸಾದಾದವಾಪ್ನೋತಿ ಶಾಶ್ವತಂ ಪದಮವ್ಯಯಮ್ ॥೫೬॥

ಸರ್ವ ಕರ್ಮಾಣಿ ಅಪಿ ಸದಾ ಕುರ್ವಾಣಃ ಮತ್ ವ್ಯಪಾಶ್ರಯಃ ।
ಮತ್ ಪ್ರಸಾದಾತ್ ಅವಾಪ್ನೋತಿ ಶಾಶ್ವತಮ್ ಪದಮ್ ಅವ್ಯಯಮ್ – 'ನಾನೇ' ಸರ್ವಸ್ವ ಎಂದು ತಿಳಿದು ಎಲ್ಲಾ ಕರ್ಮಗಳನ್ನು ನಿರಂತರ ಮಾಡುತ್ತಿರುವವನು ನನ್ನ ಹಸಾದದಿಂದ, ಅಳಿವಿರದ ಬದಲಾಗದ ತಾಣವನ್ನು ಸೇರುತ್ತಾನೆ.

ಭಗವಂತನೇ ಸರ್ವಸ್ವ ಎಂದು ತಿಳಿದು; ಯಾವುದೇ ಕರ್ಮ ಮಾಡಿದರೂ ಆ ಕರ್ಮದ ಗುರಿ ಭಗವಂತನನ್ನಾಗಿರಿಸಿಕೊಂಡು; ಪೂರ್ಣ ಭಗವದರ್ಪಣಾ ಬುದ್ಧಿಯಿಂದ ಕರ್ಮ ಮಾಡುವವರು, ಭಗವಂತನ ಅನುಗ್ರಹದಿಂದ ಎಂದೂ ಏರುಪೇರಿಲ್ಲದ ಮೋಕ್ಷವನ್ನು ಸೇರುತ್ತಾರೆ.

ಚೇತಸಾ ಸರ್ವಕರ್ಮಾಣಿ ಮಯಿ ಸಂನ್ಯಸ್ಯ ಮತ್ ಪರಃ ।
ಬುದ್ಧಿಯೋಗಮುಪಾಶ್ರಿತ್ಯ ಮಚ್ಚಿತ್ತಃ ಸತತಂ ಭವ ॥೫೭॥

ಚೇತಸಾ ಸರ್ವಕರ್ಮಾಣಿ ಮಯಿ ಸಂನ್ಯಸ್ಯ ಮತ್ ಪರಃ ।
ಬುದ್ಧಿಯೋಗಮ್ ಉಪಾಶ್ರಿತ್ಯ ಮತ್ ಚಿತ್ತಃ ಸತತಮ್ ಭವ – ಒಳಬಗೆಯಿಂದ ಎಲ್ಲಾ ಕರ್ಮಗಳನ್ನು ನನಗೊಪ್ಪಿಸಿ, ನನ್ನನ್ನೇ ಪರತತ್ವವೆಂದು ತಿಳಿದು, ಜ್ಞಾನಯೋಗದ ದಾರಿ ಹಿಡಿದು ನಿರಂತರ ನನ್ನಲ್ಲೇ ಒಳಬಗೆಯನ್ನಿಡು.

ಇಲ್ಲಿ ಕೃಷ್ಣ ಹೇಳುತ್ತಾನೆ: "ನನ್ನನ್ನು ತಿಳಿದು, ಎಲ್ಲಾ ಕರ್ಮವನ್ನು ನನ್ನಲ್ಲಿ ಅರ್ಪಿಸಿ, ಜ್ಞಾನಯೋಗದಿಂದ ಮನಸ್ಸನ್ನು ನಿರಂತರ ನನ್ನಲ್ಲಿರಿಸು" ಎಂದು . ಇಲ್ಲಿ ನಾವು ಮಾಡುವ ಎಲ್ಲಾ ಕರ್ಮವನ್ನು ಭಗವಂತನಿಗೆ ಅರ್ಪಿಸಿ ಮಾಡಬೇಕು ಎನ್ನುವುದು ಬಹಳ ಮುಖ್ಯವಾದ ವಿಷಯ. ಇಂದು ಈ ರೀತಿಯ ಕರ್ಮ ಸಾಧನೆ ಇಲ್ಲವಾಗಿದೆ. ಇದಕ್ಕೆ ಮೂಲ ಕಾರಣ ಅಜ್ಞಾನ. ನಾವು ಪೂಜೆ ಮಾಡುವುದು ಯಾವುದೋ ಫಲದ ಅಪೇಕ್ಷೆಯಿಂದ. ಕೆಲವೊಮ್ಮೆ ಜ್ಯೋತಿಷಿಗಳು ಯಾವುದೋ ಗ್ರಹ ದೋಷವಿದೆ ಎಂದು ಹೇಳುತ್ತಾರೆ. ಉದಾಹರಣೆಗೆ: ಕುಜದೋಷ. ಸಾಮಾನ್ಯವಾಗಿ ಜ್ಯೋತಿಷಿಗಳು ಕುಜದೋಷ ಎಂದು ಹೇಳಿದಾಗ ನಮಗೆ ಮೊದಲು ಕಾಣುವುದು 'ಈ ಗ್ರಹ ನಮಗೆ ತೊಂದರೆ ಕೊಡುತ್ತಿದೆ' ಎಂದು. ವಸ್ತುತಃ ಕುಜದೋಷ ಎಂದರೆ ಕುಜನ ದೋಷವಲ್ಲ. ಅದು ನಮ್ಮ ದೋಷ. ನಮ್ಮ ಪ್ರಾರಾಬ್ಧಕರ್ಮ. ಅದನ್ನು ಈ ಗ್ರಹ ಸೂಚಿಸುತ್ತದೆ ಅಷ್ಟೆ. ಅದನ್ನು ನಾವು ತಪ್ಪಾಗಿ ಕುಜನೇ ನನ್ನ ಬೆನ್ನ ಹಿಂದೆ ಬಿದ್ದಿದ್ದಾನೆ ಎಂದು ತಿಳಿದುಕೊಳ್ಳುತ್ತೇವೆ. ಗ್ರಹಗಳಿರುವುದು ನಮಗೆ ಕಾಟ ಕೊಡಲಿಕ್ಕಾಗಿ ಅಲ್ಲ. ಅವರು ಎಂದೂ ಕಾಟ ಕೊಡುವುದಿಲ್ಲ. ಬದಲಿಗೆ ನಮಗೆ ನಮ್ಮ ಪ್ರರಾಬ್ಧದಿಂದ ಬರತಕ್ಕ ಕಾಟವನ್ನು ಅವರು ಸೂಚಿಸುತ್ತಾರೆ. ನಮಗೆ ಕಷ್ಟಬರುವ ಸಾಧ್ಯತೆಯನ್ನು ನಮಗೆ ಮುಂದಾಗಿ ತಿಳಿಸಿ, ನಾವು ಆ ಅನಿಷ್ಟವನ್ನು ಎದುರಿಸಲು ಮಾನಸಿಕ ಸಿದ್ಧತೆ ನಡೆಸುವಂತೆ ಮಾಡುವುದು ಗ್ರಹಗಳ ಕರ್ತವ್ಯ. ಹೀಗೆ ಪ್ರಾರಾಬ್ಧಕರ್ಮ ಇದೆ ಎಂದು ಗೊತ್ತಾದಾಗ, ಆ ಸಮಸ್ಯೆಯನ್ನು ಎದುರಿಸಿ, ಸಾಧನಾ ಮಾರ್ಗದಲ್ಲಿ ಮುಂದೆ ಸಾಗುವುದಕ್ಕೆ ಭಗವಂತನಲ್ಲಿ ಮೊರೆ ಹೋಗುವುದು ಪ್ರಾಯಶ್ಚಿತ್ತ ಪೂಜೆಯೇ ಹೊರತು-ಇದು ಗ್ರಹಗಳಿಗೆ ಕೊಡುವ ಲಂಚವಲ್ಲ. ಉದಾಹರಣೆಗೆ ನವಗ್ರಹ ಪೂಜೆ. ನಮ್ಮ ಪ್ರಾರಾಬ್ಧಕರ್ಮವನ್ನು ಗ್ರಹಗಳು ಸೂಚಿಸಿರುವುದರಿಂದ, ಆ ಗ್ರಹಗಳ ಅಂತರ್ಯಾಮಿಯಾಗಿರುವ ಭಗವಂತನನ್ನು ಪ್ರಾರ್ಥಿಸುವುದು ನವಗ್ರಹಪೂಜೆ.

ನಾರಾಯಣನ ಭಕ್ತನನ್ನೂ ಪ್ರಾರಾಬ್ಧಕರ್ಮ ಬಿಡುವುದಿಲ್ಲ. ನಮ್ಮ ಪ್ರಾರಾಬ್ಧಕ್ಕೆ ತಕ್ಕಂತೆ ನಾವು ನಮ್ಮ ಗ್ರಹಚಾರವನ್ನು ಅನುಭವಿಸಲೇಬೇಕು. ಜ್ಞಾನಿಗಳಿಗೂ ಕೂಡಾ ಕಷ್ಟ ಬರುತ್ತದೆ. ಆ ದುಃಖವನ್ನು ಎದುರಿಸುವ ಸಾಮರ್ಥ್ಯ ನಮ್ಮಲ್ಲಿಲ್ಲದಾಗ ಭಗವಂತನನ್ನು ಪ್ರಾರ್ಥಿಸುವುದು ತಪ್ಪಲ್ಲ. ಇಲ್ಲಿ ಒಂದು ಬಹಳ ಮುಖ್ಯ ವಿಷಯ ಏನೆಂದರೆ ಫಲಾಪೇಕ್ಷೆ ಇಲ್ಲದೆ ಪರಮಾತ್ಮನಲ್ಲಿ ಪ್ರಾರ್ಥನೆ. "ನಾನು ನನ್ನ ಹಿಂದಿನ ಜನ್ಮದಲ್ಲಿ ಮಾಡಿದ ಕರ್ಮದ ಫಲವಾಗಿ ಇಂದು ಈ ಅನಿಷ್ಟವನ್ನು ಪಡೆದಿದ್ದೇನೆ. ನನ್ನ ಮುಂದಿರುವ ಈ ಗ್ರಹಚಾರವನ್ನು ನೀನು ಗ್ರಹಗಳ ಅಂತರ್ಯಾಮಿಯಾಗಿ ನಿಂತು ನನಗೆ ತೋರಿಸಿದ್ದೀಯ. ನಿನಗೆ ನನ್ನ ಕೋಟಿ-ಕೋಟಿ ನಮನ. ನನಗರಿವಿಲ್ಲದೆ ನಾನು ಮಾಡಿದ ತಪ್ಪನ್ನು ಮನ್ನಿಸಿ, ನಾನು ಈ ಅನಿಷ್ಟವನ್ನು ಎದುರಿಸಿ ಜ್ಞಾನ ಮಾರ್ಗದಲ್ಲಿ ಮುನ್ನೆಡೆದು ನಿನ್ನನ್ನು ಸೇರಲು ನನಗೆ ದಾರಿ ತೋರಿಸು; ನನ್ನೊಳಗಿರುವ ನೀನು ನಿನ್ನ ಪೂಜೆಯನ್ನು ನನ್ನನ್ನು ಮಾಧ್ಯಮವಾಗಿ ಬಳಸಿ ಮಾಡಿಸಿಕೋ; ನಾನು ನಿನ್ನಲ್ಲಿ ಶರಣಾಗಿದ್ದೇನೆ" ಎನ್ನುವ ಅನುಸಂಧಾನ ಈ ಪೂಜೆಯ ಹಿಂದಿರಬೇಕು. ಹೀಗೆ

ಭಗವಂತ ಸರ್ವಶ್ರೇಷ್ಠ ಎನ್ನುವ ಎಚ್ಚರದಿಂದ, ಎಲ್ಲಾ ದೇವತೆಗಳ ಆರಾಧನೆ ಮಾಡುವಾಗಲೂ ಸಹ- ಅವರ ಅಂತರ್ಯಾಮಿಯಾಗಿರತಕ್ಕಂತಹ ಭಗವಂತನನ್ನು ತಿಳಿದು, ಕರ್ಮವನ್ನು ಮಾನಸಿಕವಾಗಿ ಭಗವಂತನಲ್ಲಿ ಅರ್ಪಿಸಬೇಕು. ಇದು ನಿಜವಾಗಿ ಮಾಡಬೇಕಾದ ಕರ್ಮದ ವಿಧಾನ.

ಒಟ್ಟಿನಲ್ಲಿ ಹೇಳಬೇಕೆಂದರೆ: ನಾವು ನಮ್ಮ ಮನಸ್ಸು ಬೇರೆಕಡೆ ಹೋಗದಂತೆ ತಡೆದು ಅದನ್ನು ಭಗವಂತನಲ್ಲಿ ನೆಲೆಗೊಳಿಸಬೇಕು; ನಾವು ಮಾಡುವ ಎಲ್ಲಾ ಕರ್ಮಗಳೂ ಭಗವಂತನ ಪೂಜಾರೂಪವಾಗಿದ್ದು, ಅದನ್ನು ಭಗವಂತ ನಮ್ಮ ಕೈಯಿಂದ ಮಾಡಿಸುತ್ತಿದ್ದಾನೆ ಎನ್ನುವ ಎಚ್ಚರ ನಮ್ಮ ಮನಸ್ಸಿನಲ್ಲಿ ನೆಲೆಗೊಳ್ಳಬೇಕು. ನಮ್ಮ ಅನುಷ್ಠಾನ, ಅನುಸಂಧಾನ ಆನಂದಮಯವಾಗಿರಬೇಕು. ಅಲ್ಲಿ ಯಾವುದೇ ಒತ್ತಡ, ಭಯ, ಫಲಾಪೇಕ್ಷೆ ಇರಕೂಡಾದು.

ಮಚ್ಚಿತ್ತಃ ಸರ್ವದುರ್ಗಾಣಿ ಮತ್ ಪ್ರಸಾದಾತ್ ತರಿಷ್ಯಸಿ ।
ಅಥ ಚೇತ್ ತ್ವಮಹಂಕಾರಾನ್ನ ಶ್ರೋಷ್ಯಸಿ ವಿನಂಕ್ಷ್ಯಸಿ ॥೫೮॥

ಮತ್ ಚಿತ್ತಃ ಸರ್ವದುರ್ಗಾಣಿ ಮತ್ ಪ್ರಸಾದಾತ್ ತರಿಷ್ಯಸಿ ।
ಅಥ ಚೇತ್ ತ್ವಮ್ ಅಹಂಕಾರಾತ್ ನ ಶ್ರೋಷ್ಯಸಿ ವಿನಂಕ್ಷ್ಯಸಿ – ನನ್ನಲ್ಲೇ ಒಳಬಗೆಯಿಟ್ಟಾಗ, ನನ್ನ ಹಸಾದದಿಂದ ಎಲ್ಲಾ ಕೋಟಲೆಗಳನ್ನು ದಾಟುವೆ. ಒಂದೊಮ್ಮೆ ಹೆಮ್ಮೆಯಿಂದ ಕಿವಿಗೊಡದಿದ್ದರೆ ಕೆಟ್ಟುಹೋಗುವೆ.

ಮನಸ್ಸನ್ನು ಭಗವಂತನತ್ತ ಹರಿಸಿ, ಬುದ್ಧಿಯಲ್ಲಿ ಭಗವಂತನನ್ನು ನೆಟ್ಟು, ಚಿತ್ತದಲ್ಲಿ ಭಗವಂತನನ್ನು ಸ್ಥಿರಗೊಳಿಸಿ, ಸುಪ್ತಪ್ರಜ್ಞೆಯಲ್ಲಿ ಕೂಡಾ ಭಗವಂತನ ಸ್ಮರಣೆ ಶಾಶ್ವತಗೊಳಿಸಿದಾಗ, ನಮ್ಮ ಎಲ್ಲಾ ಕ್ರಿಯೆಗಳೂ ಭಗವಂತನ ಪೂಜೆಯಾಗುತ್ತದೆ. ಇದರಿಂದ ನಮ್ಮ ಎಲ್ಲಾ ವ್ಯವಹಾರದಲ್ಲೂ ಪೂರ್ಣ ಪ್ರಾಮಾಣಿಕತೆ ವ್ಯಕ್ತವಾಗುತ್ತದೆ ಹಾಗೂ ಜೀವನದಲ್ಲಿ ಬರುವ ದುರ್ಗಮ ಸ್ಥಿತಿ, ಕಷ್ಟ, ಕಾರ್ಪಣ್ಯಗಳನ್ನು ಎದುರಿಸುವ ಕ್ಷಮತೆ ಬರುತ್ತದೆ. ಹೀಗೆ ಜ್ಞಾನಿ ತನ್ನ ಜೀವನ ಪಯಣದಲ್ಲಿ ಅನಿವಾರ್ಯವಾಗಿ ಬರುವ ಎಲ್ಲಾ ಆಪತ್ತುಗಳನ್ನು ನಿರಾಯಾಸವಾಗಿ ದಾಟಿ ಮುನ್ನಡೆಯುತ್ತಾನೆ. ಈ ರೀತಿ ಬದುಕಿದಾಗ ಭಗವಂತ ನಮ್ಮ ಜೀವನದಲ್ಲಿ ಬರುವ ಸರ್ವ ಅನಿಷ್ಟಗಳಿಂದಲೂ ನಮ್ಮನ್ನು ರಕ್ಷಿಸುತ್ತಾನೆ. ಆತನ ರಕ್ಷಾಕವಚ ಸದಾ ನಮ್ಮನ್ನು ಸುತ್ತುವರಿದಿರುತ್ತದೆ. ಇದರಿಂದ ಜೀವನದಲ್ಲಿ ಬರುವ ಎಲ್ಲಾ ಆಪತ್ತುಗಳಿಂದ ನಾವು ಪಾರಾಗುತ್ತೇವೆ. ಇದನ್ನು ಬಿಟ್ಟು ವೇದಾಂತ ಕೇವಲ ಬೊಗಳೆ, ಅದರಲ್ಲಿ ನನಗೆ ನಂಬಿಕೆ ಇಲ್ಲ ಎಂದು ಅಹಂಕಾರ ಪಟ್ಟರೆ, ನಮ್ಮ ಕೈಯಾರೆ ನಾವು ನಮ್ಮ ಭವಿಷ್ಯವನ್ನು ಹಾಳು ಮಾಡಿಕೊಂಡು ವಿನಾಶ ಹೊಂದುತ್ತೇವೆ.

ಯದಹಂಕಾರಮಾಶ್ರಿತ್ಯ ನ ಯೋತ್ಸ್ಯ ಇತಿ ಮನ್ಯಸೇ ।
ಮಿಥ್ಯೈಷ ವ್ಯವಸಾಯಸ್ತೇ ಪ್ರಕೃತಿಸ್ತ್ವಾಂ ನಿಯೋಕ್ಷ್ಯತಿ ॥೫೯॥

ಯತ್ ಅಹಂಕಾರಮ್ ಆಶ್ರಿತ್ಯ ನ ಯೋತ್ಸ್ಯೇ ಇತಿ ಮನ್ಯಸೇ ।

ಮಿಥ್ಯಾ ಏಷಃ ವ್ಯವಸಾಯಃ ತೇ ಪ್ರಕೃತಿಃ ತ್ವಾಮ್ ನಿಯೋಕ್ಷ್ಯತಿ – ಅಹಂಕಾರದಿಂದ ಬೀಗಿ 'ನಾನು ಹೋರಾಡುವುದಿಲ್ಲ' ಎಂದು ತಿಳಿದಿರುವೆಯಾದರೆ ನಿನ್ನ ಈ ನಿರ್ಧಾರ ಹುಸಿಯಾದದ್ದು. ನಿನ್ನ ಸ್ವಭಾವ [ಭಗವಂತನ ಇಚ್ಛೆ] ನಿನ್ನನ್ನು ಹೋರಾಡಿಸುತ್ತದೆ.

'ನಾನು ಯುದ್ಧ ಮಾಡುವುದಿಲ್ಲ' ಎಂದು ಅರ್ಜುನ ರಥದಲ್ಲಿ ಕುಸಿದು ಕುಳಿತದ್ದನ್ನು ನಾವು ಅಧ್ಯಾಯ ಒಂದರಲ್ಲಿ ನೋಡಿದ್ದೇವೆ. ಇಲ್ಲಿ ಕೃಷ್ಣ ಹೇಳುತ್ತಾನೆ " 'ನಾನು ಯುದ್ಧ ಮಾಡುವುದಿಲ್ಲ' ಎನ್ನುವುದು ನಿನ್ನ ಅಹಂಕಾರಭರಿತ ಭ್ರಮೆ. ನೀನು ಏನನ್ನು  ಮಾಡುವುದಿಲ್ಲ ಎಂದು ಹೇಳಿರುವೆಯೋ ಅದನ್ನೇ ಮಾಡುತ್ತೀಯ" ಎಂದು. ಏಕೆಂದರೆ ನಮ್ಮನ್ನು ನಿಯಂತ್ರಣ ಮಾಡುವ ಶಕ್ತಿ ಪ್ರಕೃತಿ. ಇಲ್ಲಿ ನಮ್ಮ ಭೌತಿಕ ತೀರ್ಮಾನ ವ್ಯರ್ಥ. ನಮ್ಮ ಜೀವಸ್ವಭಾವ, ಅದಕ್ಕನುಗುಣವಾಗಿ ಅನುವಂಶೀಯ ಪ್ರಭಾವ, ಪರಿಸರದ ಪ್ರಭಾವ ಮತ್ತು ಈ ಎಲ್ಲವನ್ನೂ ನಿಯಂತ್ರಿಸುವ ಭಗವಂತನ ಇಚ್ಛೆಯಂತೆ ಕ್ರಿಯೆ ನಡೆದೇ ನಡೆಯುತ್ತದೆ.

ಸ್ವಭಾವಜೇನ ಕೌಂತೇಯ ನಿಬದ್ಧಃ ಸ್ವೇನ ಕರ್ಮಣಾ ।
ಕರ್ತುಂ ನೇಚ್ಛಸಿ ಯನ್ಮೋಹಾತ್ ಕರಿಷ್ಯಸ್ಯವಶೋSಪಿ ತತ್ ॥೬೦॥

ಸ್ವಭಾವಜೇನ ಕೌಂತೇಯ ನಿಬದ್ಧಃ ಸ್ವೇನ ಕರ್ಮಣಾ ।
ಕರ್ತುಂ ನ ಇಚ್ಛಸಿ ಯತ್ ಮೋಹಾತ್ ಕರಿಷ್ಯಸಿ ಅವಶಃ ಅಪಿ ತತ್ – ಕೌಂತೇಯಾ, ಸ್ವಭಾವ ಸಹಜವಾದ ನಿನ್ನ ಕರ್ಮದಿಂದ ನೀನು ಸುತ್ತುವರಿದಿರುವೆ. ಅಜ್ಞಾನದಿಂದಾಗಿ  ಯಾವುದನ್ನು ಮಾಡಬಾರದು ಎಂದೆಣಿಸಿರುವೆ, ಅದನ್ನು ನೀನು ನಿನಗರಿವಿಲ್ಲದಂತೆಯೇ[ಭಗವದಿಚ್ಛೆಗೆ ವಶನಾಗಿ] ಮಾಡುವೆ.

ನಾವು ಹೀಗೆ ಮಾಡಬೇಕು, ಹಾಗೆ ಮಾಡಬೇಕು ಎಂದು ಅಹಂಕಾರದಿಂದ ಯೋಚಿಸುವುದು ನಮ್ಮ ಅಜ್ಞಾನದಿಂದ. ಈ ರೀತಿ ಯಾವ ಯೋಚನೆ ಮಾಡಿದರೂ ಕೊನೆಗೆ ಮಾಡುವುದು ನಮ್ಮ ಜೀವ ಸ್ವಭಾವಕ್ಕೆ ಅನುಗುಣವಾಗಿಯೇ. ಇದರ ನಿಯಂತ್ರಣ ನಮ್ಮಲ್ಲಿಲ್ಲ.  ಅದು ನಮಗರಿವಿಲ್ಲದಂತೆ, ಭಗವಂತನ ಇಚ್ಛೆಯಂತೆ ನಡೆಯುತ್ತದೆ.

ಈಶ್ವರಃ ಸರ್ವಭೂತಾನಾಂ ಹೃದ್ದೇಶೇSರ್ಜುನ ತಿಷ್ಠತಿ ।
ಭ್ರಾಮಯನ್ ಸರ್ವಭೂತಾನಿ ಯಂತ್ರಾರೂಢಾನಿ ಮಾಯಯಾ॥೬೧॥

ಈಶ್ವರಃ ಸರ್ವಭೂತಾನಾಂ ಹೃತ್ ದೇಶೇ ಅರ್ಜುನ ತಿಷ್ಠತಿ ।
ಭ್ರಾಮಯನ್ ಸರ್ವಭೂತಾನಿ ಯಂತ್ರ ಆರೂಢಾನಿ ಮಾಯಯಾ – ಅರ್ಜುನಾ, ಎಲ್ಲಾ ಜೀವಿಗಳ ಎದೆಯ ತಾಣದಲ್ಲಿ ಸರ್ವಶಕ್ತನಾದ ಭಗವಂತ ನೆಲೆಸಿದ್ದಾನೆ – ಸುತ್ತುವ ಜಗದ್ ಯಂತ್ರದಲ್ಲಿ ಕೂತ ಎಲ್ಲಾ ಜೀವಿಗಳನ್ನೂ ಪ್ರಕೃತಿಯ ಮಾಯೆಯಿಂದ [ತನ್ನ ಇಚ್ಛೆಯಿಂದ]ತಿರುಗಾಡಿಸುತ್ತಾ.

ಎಲ್ಲಾ ಜೀವರ ಹೃತ್ಕಮಲದ ಮಧ್ಯದಲ್ಲಿ ಸರ್ವಶಕ್ತನಾದ ಭಗವಂತ ನೆಲೆಸಿದ್ದಾನೆ. ಈ ಪಿಂಡಾಂಡ ಮತ್ತು ಬ್ರಹ್ಮಾಂಡ ಎನ್ನುವ ಅದ್ಭುತ ಯಂತ್ರ ನಿರಂತರ ಚಲಿಸುವಂತೆ ಮಾಡುವವ ಆ ಭಗವಂತ. ಆತನೇ ಬ್ರಹ್ಮಾಂಡ ಮತ್ತು ಪಿಂಡಾಂಡದ ಒಡೆಯ. ಎಲ್ಲರೊಳಗಿದ್ದು ಅವರಿಗೆ ಅನುಭವವನ್ನು ಕೊಟ್ಟು ನಿಯಂತ್ರಿಸುವ ಮಹಾ ಚೈತನ್ಯ ಆ ಭಗವಂತ. ಸರ್ವ ಕರ್ಮವೂ ಭಗವಂತನ ಮಹಿಮೆಯಿಂದ ಅವನ ಇಚ್ಛೆಯಂತೆ ನಡೆಯುತ್ತದೆ.

ತಮೇವ ಶರಣಂ ಗಚ್ಛ ಸರ್ವಭಾವೇನ ಭಾರತ ।
ತತ್ ಪ್ರಸಾದಾತ್ ಪರಾಂ ಶಾಂತಿ ಸ್ಥಾನಂ ಪ್ರಾಪ್ಸ್ಯಸಿ ಶಾಶ್ವತಮ್ ॥೬೨॥

ತಮ್ ಏವ ಶರಣಂ ಗಚ್ಛ ಸರ್ವಭಾವೇನ ಭಾರತ ।
ತತ್ ಪ್ರಸಾದಾತ್ ಪರಾಂ ಶಾಂತಿ ಸ್ಥಾನಂ ಪ್ರಾಪ್ಸ್ಯಸಿ ಶಾಶ್ವತಮ್ – ಭಾರತಾ, ಎಲ್ಲಾ ಬಗೆಯಿಂದಲೂ ಅವನಿಗೇ ಶರಣಾಗು. ಅವನ ಕರುಣೆಯಿಂದ ಹಿರಿದಾದ ಸುಖವನ್ನು, ಅಳಿವಿರದ ತಾಣವನ್ನು ಪಡೆಯುವೆ.

ಸರ್ವಸಮರ್ಥನಾದ ಭಗವಂತನಿಗೆ ನಾವು ನಮ್ಮನ್ನು ಅರ್ಪಿಸಿಕೊಳ್ಳಬೇಕು. ನಮ್ಮ ಜೀವನದ ಎಲ್ಲಾ ಹಂತಗಳಲ್ಲೂ ಭಗವಂತನಲ್ಲಿ ಶರಣಾಗತಿ ಇರಬೇಕು.[ಕೇವಲ ಕಷ್ಟ ಕಾಲದಲ್ಲಿ ಮಾತ್ರವಲ್ಲ]. ನಮ್ಮಲ್ಲಿ ಸತ್ವಗುಣವನ್ನು ಬೆಳಸಿಕೊಂಡು, ಕತ್ತಲೆಯನ್ನು ದೂರಮಾಡಿ, ಭಗವಂತನಲ್ಲಿ ನಮ್ಮನ್ನು ನಾವು ಅರ್ಪಿಸಿಕೊಂಡಾಗ-ನಮಗೆ ನಿಜವಾದ ಪೂರ್ಣ ಸತ್ವದ ದರ್ಶನವಾಗುತ್ತದೆ. ಆ ಭಗವಂತ ಕಣ್ಣು ತೆರೆದು ಅನುಗ್ರಹ ಮಾಡಿದನೆಂದರೆ ನಂತರ ತಿಳಿವು ಬರಲು ಇತರ ಯಾವ ಸಾಧನವೂ ಬೇಡ. ಸತ್ಯ ತನ್ನಷ್ಟಕ್ಕೆ ತಾನು ತೆರೆದುಕೊಳ್ಳುತ್ತದೆ ಮತ್ತು ಸರ್ವೋತ್ಕೃಷ್ಟ ಆನಂದ ನಮ್ಮದಾಗುತ್ತದೆ. ಇದರಿಂದ ಜ್ಞಾನಾನಂದದ ತುತ್ತ ತುದಿಯಾದ ಮೋಕ್ಷವನ್ನು ಸೇರಬಹುದು.

ಇತಿ ತೇ ಜ್ಞಾನಮಾಖ್ಯಾತಂ ಗುಹ್ಯಾದ್ ಗುಹ್ಯತರಂ ಮಯಾ ।
ವಿಮೃಶ್ಯೈತದಶೇಷೇಣ ಯಥೇಚ್ಛಸಿ ತಥಾ ಕುರು ॥೬೩॥

ಇತಿ ತೇ ಜ್ಞಾನಮ್ ಆಖ್ಯಾತಂ ಗುಹ್ಯಾತ್ ಗುಹ್ಯತರಂ ಮಯಾ।
ವಿಮೃಶ್ಯ ಏತತ್ ಅಶೇಷೇಣ ಯಥಾ ಇಚ್ಛಸಿ ತಥಾ ಕುರು -- ತುಂಬಾ ಜತನದಿಂದ ಬಚ್ಚಿಡಬೇಕಾದ ಈ ತಿಳಿವನ್ನು ನಾನು ನಿನ್ನೆದುರು ಬಿಚ್ಚಿಟ್ಟೆ. ಇದನ್ನೆಲ್ಲವನ್ನು ಪರಾಂಬರಿಸಿ ಮತ್ತೆ ನಿನಗೆ ತೋಚಿದಂತೆ ಮಾಡು.

ಕೃಷ್ಣ ಹದಿನೈದನೇ ಅಧ್ಯಾಯದಲ್ಲಿ ಜ್ಞಾನದ ಉಪಸಂಹಾರ ಮಾಡಿದ್ದ. ಇಲ್ಲಿ ಉಪಾಸನೆಯ ಎಲ್ಲಾ ಅರಿವನ್ನು ಕೊಟ್ಟ ನಂತರ ಅದರ ಉಪಸಂಹಾರ ಮಾಡುತ್ತಾ ಹೇಳುತ್ತಾನೆ: "ಇದು ಪ್ರಪಂಚದಲ್ಲಿನ ರಹಸ್ಯಗಳಲ್ಲಿ ರಹಸ್ಯ. ಅಧ್ಯಾತ್ಮದ ಅಂತರಂಗದ ರಹಸ್ಯವನ್ನು ನಿನಗೆ ಹೇಳಿದೆ. ನಾನು ಹೇಳಿರುವ ವಿಚಾರವನ್ನು ಸಮಗ್ರವಾಗಿ

ಪರಾಂಬರಿಸಿ ನಿನಗೆ ಮನವರಿಕೆಯಾದಂತೆ ಮಾಡು" ಎಂದು. ಇಲ್ಲಿ 'ನಿನ್ನ ಜೀವಸ್ವರೂಪ, ಆತ್ಮಸಾಕ್ಷಿ ಏನು ಹೇಳುತ್ತದೋ ಹಾಗೇ ಮಾಡು' ಎಂದು ಅರ್ಜುನನಿಗೆ ಹೇಳುವ ಮೂಲಕ-ನಾವು ಇನ್ನೊಬ್ಬರ ಮೇಲೆ ನಮ್ಮ ಅಭಿಪ್ರಾಯ ಹೇರಬಾರದು ಎನ್ನುವ ಸಮಾಜನೀತಿಯನ್ನು ಕೃಷ್ಣ ಎತ್ತಿ ತೋರಿಸಿದ್ದಾನೆ.

ಸರ್ವಗುಹ್ಯತಮಂ ಭೂಯಃ ಶೃಣು ಮೇ ಪರಮಂ ವಚಃ ।
ಇಷ್ಟೋಽಸಿ ಮೇ ದೃಢಮಿತಿ ತತೋ ವಕ್ಷ್ಯಾಮಿ ತೇ ಹಿತಮ್ ॥೬೪॥

ಸರ್ವ ಗುಹ್ಯ ತಮಮ್ ಭೂಯಃ ಶೃಣು ಮೇ ಪರಮಂ ವಚಃ ।
ಇಷ್ಟಃ ಅಸಿ ಮೇ ದೃಢಮ್ ಇತಿ ತತಃ ವಕ್ಷ್ಯಾಮಿ ತೇ ಹಿತಮ್ – ಎಲ್ಲಕ್ಕಿಂತ ಹೆಚ್ಚು ಬಚ್ಚಿಡಬೇಕಾದ ನನ್ನೀ ಹಿರಿಯ ಮಾತನ್ನು ಇನ್ನೊಮ್ಮೆ ಆಲಿಸು. ನೀನು ನನಗೆ ತುಂಬಾ ಮೆಚ್ಚಿನವನೆಂದು, ಅದಕ್ಕಾಗಿ ನಿನಗೆ ಹಿತ-ವಾದವನ್ನು ಹೇಳುತ್ತಿದ್ದೇನೆ:

ಹಿಂದೆ ಹೇಳಿದ ಸಾಧನೆಯ ಸಾರವನ್ನು, ನಾವು ತಿಳಿದುಕೊಳ್ಳಬೇಕಾದ ವಿಷಯಗಳಲ್ಲಿ ಅತ್ಯಂತ ರಹಸ್ಯವಾದ ಸಾಧನೆಯ ಗುಟ್ಟನ್ನು ಸಾತ್ವಿಕನಾದ ನಿನಗೆ ಇನ್ನೊಮ್ಮೆ ಹೇಳುತ್ತಿದ್ದೇನೆ; ನನ್ನ ಭಕ್ತನಾದ ನೀನು ಜ್ಞಾನಿ. ಜ್ಞಾನಿಗಳು ನನಗೆ ಅಚ್ಚುಮೆಚ್ಚು, ಅದಕ್ಕಾಗಿ ಅದನ್ನು ಮತ್ತೊಮ್ಮೆ ಹೇಳುತ್ತಿದ್ದೇನೆ- ಕೇಳು:

ಮನ್ಮನಾ ಭವ ಮದ್ ಭಕ್ತೋ ಮದ್ ಯಾಜೀ ಮಾಂ ನಮಸ್ಕುರು ।
ಮಾಮೇವೈಷ್ಯಸಿ ಸತ್ಯಂ ತೇ ಪ್ರತಿಜಾನೇ ಪ್ರಿಯೋಽಸಿ ಮೇ ॥೬೫॥

ಮತ್ ಮನಾಃ ಭವ ಮತ್ ಭಕ್ತಃ ಮತ್ ಯಾಜೀ ಮಾಂ ನಮಸ್ಕುರು ।
ಮಾಮ್ ಏವ ಏಷ್ಯಸಿ ಸತ್ಯಂ ತೇ ಪ್ರತಿಜಾನೇ ಪ್ರಿಯಃ ಅಸಿ ಮೇ -- ನನ್ನಲ್ಲೇ ಬಗೆಯಿಡು. ನನ್ನಲ್ಲೇ ಭಕ್ತಿಯಿಡು. ನನ್ನನ್ನೇ ಪೂಜಿಸು. ನನಗೇ ಪೊಡಮಡು. ಆಗ ನನ್ನನ್ನೇ ಸೇರುವೆ. ನೀನು ನನಗೆ ಮೆಚ್ಚಿನವ. ನಿನ್ನಾಣೆಗೂ ಇದು ನಿಜ.

ಸಾಧನೆಯ ಸಾರವನ್ನು ವಿವರಿಸುತ್ತಾ ಕೃಷ್ಣ ಇಲ್ಲಿ ಹಿಂದೆ ವಿವರಿಸಿದ ವಿಷಯವನ್ನು, ಸಾಧನೆಯ ಸಾರಸಂಗ್ರಹವನ್ನು ಮತ್ತೆ ಉಪಸಂಹಾರ ರೂಪದಲ್ಲಿ ಹೇಳುತ್ತಾನೆ. ಕೃಷ್ಣ ಹೇಳುತ್ತಾನೆ: "ನನ್ನಲ್ಲೇ ಮನಸ್ಸನ್ನಿಡು" ಎಂದು. ಸಾಧನೆಯಲ್ಲಿ ನಮ್ಮ ಅನನ್ಯಚಿಂತನೆ ಕೇವಲ ಭಗವಂತನ ಕುರಿತಾದ ಏಕಭಕ್ತಿಯಾಗಿರಬೇಕು. ಜ್ಞಾನಪೂರ್ವಕವಾಗಿ ಭಗವಂತ ಸರ್ವೋತ್ತಮ ಎಂದು ಭಗವಂತನನ್ನು ನೆನೆಯಬೇಕು. ಭಗವಂತನಲ್ಲಿ "ಶುದ್ಧವಾದ ಪ್ರೀತಿ ಇರಲಿ". ನಾವು ಮಾಡುವ ಎಲ್ಲಾ ಕರ್ಮಗಳೂ ಪ್ರೀತಿಪೂರ್ವಕ ಭಗವದರ್ಪಣೆಯಾಗಿರಬೇಕು. "ಸರ್ವದೇವ ನಮಸ್ಕಾರಃ ಕೇಶವಂ ಪ್ರತಿಗಚ್ಛತಿ" ಎನ್ನುವ ಸತ್ಯವನ್ನು ತಿಳಿದು ಸರ್ವಾಂತರ್ಯಾಮಿ ಭಗವಂತನನ್ನು ಪೂಜಿಸು. ಈ ರೀತಿ ಎಲ್ಲಾ ಉಪಾಸನೆಯಲ್ಲಿ ಭಗವಂತನನ್ನು ಕಂಡರೆ "ನನ್ನನ್ನೇ ಬಂದು ಸೇರುತ್ತೀಯ ಇದು ನಿನ್ನಾಣೆಗೂ ಸತ್ಯ" ಎನ್ನುತ್ತಾನೆ ಕೃಷ್ಣ.

ಸರ್ವಧರ್ಮಾನ್ ಪರಿತ್ಯಜ್ಯ ಮಾಮೇಕಂ ಶರಣಂ ವ್ರಜ ।
ಅಹಂ ತ್ವಾ ಸರ್ವಪಾಪೇಭ್ಯೋ ಮೋಕ್ಷಯಿಷ್ಯಾಮಿ ಮಾ ಶುಚಃ ॥೬೬॥

ಸರ್ವಧರ್ಮಾನ್ ಪರಿತ್ಯಜ್ಯ ಮಾಮ್ ಏಕಮ್ ಶರಣಂ ವ್ರಜ ।
ಅಹಂ ತ್ವಾಮ್ ಸರ್ವ ಪಾಪೇಭ್ಯಃ ಮೋಕ್ಷಯಿಷ್ಯಾಮಿ ಮಾ ಶುಚಃ -- ಎಲ್ಲಾ ಬಿನುಗು ಧರ್ಮಗಳನ್ನೂ ಫಲದ ಹಂಬಲಗಳನ್ನೂ ತೊರೆದು ನನಗೊಬ್ಬನಿಗೇ ಶರಣಾಗು. ನಾನು ನಿನ್ನನ್ನು ಎಲ್ಲಾ ಪಾಪಗಳಿಂದಲೂ ಪಾರುಗಾಣಿಸುತ್ತೇನೆ. ಕೊರಗದಿರು.

'ಸರ್ವಧರ್ಮಾನ್ ಪರಿತ್ಯಜ್ಯ' ಎಂದರೆ ಎಲ್ಲಾ ಪುಣ್ಯಕರ್ಮಗಳನ್ನು ಮಾಡಿ ಅದರಿಂದ ಫಲಾಪೇಕ್ಷೆಯನ್ನು ನಿರೀಕ್ಷಿಸದೇ ಇರುವುದು. ನಾವು ಮಾಡುವ ಧರ್ಮಕಾರ್ಯ ವ್ಯಾಪಾರವಾಗಬಾರದು. ಇದಕ್ಕೆ ಒಂದು ಉತ್ತಮ ದೃಷ್ಟಾಂತ ಧರ್ಮರಾಯ ಮತ್ತು ದ್ರೌಪದಿ ನಡುವಿನ ಸಂಭಾಷಣೆ. ದ್ರೌಪದಿ ಹೇಳುತ್ತಾಳೆ: "ಧರ್ಮೋ ರಕ್ಷತಿ ರಕ್ಷಿತಃ - ಯಾರು ಧರ್ಮವನ್ನು ರಕ್ಷಿಸುತ್ತಾರೋ ಅವರನ್ನು ಧರ್ಮ ರಕ್ಷಿಸುತ್ತದೆ ಎನ್ನುವುದನ್ನು ಕೇಳಿದ್ದೇನೆ, ಅದು ನಿನ್ನನ್ನು ಏಕೆ ರಕ್ಷಿಸಲಿಲ್ಲ? ನಾವೇಕೆ ರಾಜ್ಯ ಕಳೆದುಕೊಂಡು ಕಾಡು ಸೇರಬೇಕಾಯ್ತು? " ಎಂದು. ಅದಕ್ಕೆ ಧರ್ಮರಾಯ ಕೊಡುವ ಉತ್ತರ ರೋಚಕ. ಆತ ಹೇಳುತ್ತಾನೆ: "ನಾನು ಧರ್ಮದ ವ್ಯಾಪಾರಿ ಅಲ್ಲ; ನಾನು ಧರ್ಮ ಆಚರಣೆ ಮಾಡುವುದು ನನ್ನ ಆತ್ಮಸಂತೋಷಕ್ಕಾಗಿಯೇ ಹೊರತು ಯಾವುದೋ ಫಲಾಪೇಕ್ಷೆಯಿಂದಲ್ಲ" ಎಂದು. ಹೀಗೆ ಯಾವುದೇ ಧರ್ಮವಿದ್ದರೂ ಅದು ಕೇವಲ ಭಗವಂತನ ಆರಾಧನೆ. ಅಲ್ಲಿ ಫಲಾಪೇಕ್ಷೆ ಇಲ್ಲ. ಈ ರೀತಿ ಬದುಕಿದಾಗ ಭಗವಂತ ನಮ್ಮ ಎಲ್ಲಾ ಜನ್ಮಗಳ ಪಾಪಗಳನ್ನು ಸುಟ್ಟುಬಿಡುತ್ತಾನೆ. ಭಗವಂತನಲ್ಲಿ ಪೂರ್ಣ ಶರಣಾದಾಗ ಭಗವಂತನ ಕೈಯಲ್ಲಿ ನಾವು ಸುರಕ್ಷಿತವಾಗಿ ಧೈರ್ಯದಿಂದಿರಬಹುದು. ಇದು ಗೀತೆಯ ಉಪದೇಶದಲ್ಲಿ ಕೃಷ್ಣ ನಮಗೆ ಕೊಟ್ಟ ಕೊನೆಯ ಭರವಸೆ. ಇಲ್ಲಿಗೆ ಗೀತೆಯಲ್ಲಿ ಭಗವಂತನ ಉಪದೇಶದ ಭಾಗ ಮುಗಿಯಿತು. ಈ ಅಧ್ಯಾಯದ ಮುಂದಿನ ಶ್ಲೋಕಗಳಲ್ಲಿ ಗೀತೆಯ ಫಲಶ್ರುತಿಯನ್ನು ಕಾಣಬಹುದು.

ಇದಂ ತೇ ನಾತಪಸ್ಕಾಯ ನಾಭಕ್ತಾಯ ಕದಾಚನ ।
ನಚಾಶುಶ್ರೂಷವೇ ವಾಚ್ಯಂ ನಚ ಮಾಂ ಯೋಽಭ್ಯಸೂಯತಿ ॥೬೭॥

ಇದಂ ತೇ ನ ಅತಪಸ್ಕಾಯ ನ ಅಭಕ್ತಾಯ ಕದಾಚನ ।
ನಚ ಅಶುಶ್ರೂಷವೇ ವಾಚ್ಯಂ ನಚ ಮಾಂ ಯಃ ಅಭ್ಯಸೂಯತಿ – ಇದನ್ನು ನೇಮದ ನಿಷ್ಠೆ ಇರದವರಿಗೆ ಹೇಳಬೇಡ. ಭಕ್ತಿ ಇರದವನಿಗೆ ಎಂದೂ ಹೇಳಬೇಡ. ಕೇಳುವಾಸೆ ಇರದವನಿಗೂ ಹೇಳಬೇಡ. ನನ್ನ ಬಗೆಗೆ ಕಿಚ್ಚು ಪಡುವವನಿಗಂತೂ ಹೇಳಲೇಬೇಡ.

ಇಲ್ಲಿ ಕೃಷ್ಣ ಜ್ಞಾನದ ಪರಂಪರೆಯನ್ನು ಹೇಗೆ ರಕ್ಷಿಸಬೇಕು ಎನ್ನುವುದನ್ನು ವಿವರಿಸಿದ್ದಾನೆ. ಯಾರಿಗೆ ಆಳವಾದ ಚಿಂತನಶೀಲತೆ ಇಲ್ಲವೋ ಅವರಿಗೆ ಇದನ್ನು ಹೇಳಬೇಡ; ಚಿಂತನಶೀಲತೆ ಇದ್ದು ಕೇಳುವ ಆಸಕ್ತಿ ಇಲ್ಲದವರಿಗೆ ಇದನ್ನು ಹೇಳಬೇಡ; ಆಸಕ್ತಿ ಇದೆ ಆದರೆ ಭಕ್ತಿ/ಪ್ರೀತಿ ಇಲ್ಲ-ಅಂತವರಿಗೆ ಇದನ್ನು ಹೇಳಬೇಡ; ಎಲ್ಲಕ್ಕಿಂತ ಮಿಗಿಲಾಗಿ ಭಗವಂತನ ಬಗ್ಗೆ ಅಸಹನೆ,ಅಸೂಯೆ, ದ್ವೇಷವುಳ್ಳವರಿಗೆ ಸರ್ವತಾ ಹೇಳಲೇಬೇಡ. ಎಂದೂ ಅಧ್ಯಾತ್ಮವನ್ನು ಬೀದಿಯ ಸೊತ್ತಾಗಿಸಬೇಡ.

ಒಂದು ಕಾಲದಲ್ಲಿ ವೇದಾಂತವನ್ನು ಸಾರ್ವಜನಿಕವಾಗಿ ಬಿಚ್ಚಿಡಬಾರದು, ಅದನ್ನು ರಹಸ್ಯವಾಗಿಡಬೇಕು ಎನ್ನುವ ಅಭಿಪ್ರಾಯ ಹೆಚ್ಚಾಗಿ ಬೆಳೆಯಿತು. ಇದರ ಪರಿಣಾಮ ಕಾಲಕ್ರಮೇಣ ಮುಚ್ಚಿಟ್ಟ ಜ್ಞಾನವನ್ನು ತೆರೆಯುವವರೇ ಇಲ್ಲವಾಯಿತು. ಇಂದು ನಮ್ಮಲ್ಲಿ ಹೆಚ್ಚಿನವರು ಆಧ್ಯಾತ್ಮಿಕ ಗ್ರಂಥಗಳಿಗೆ ಆರತಿ ಮಾಡಿ ಕುಂಕುಮ ಹಚ್ಚಿ ಮುಚ್ಚಿಡುವವರೇ ಹೆಚ್ಚಾಗಿದ್ದಾರೆ. ಈ ಕಾರಣದಿಂದ ನಾವು ಮುಚ್ಚಿಟ್ಟ ಈ ಅಮೂಲ್ಯ ಜ್ಞಾನವನ್ನು ತೆರೆದು ಆಸಕ್ತಿವುಳ್ಳವರಿಗೆ ಕೊಡುವ ಕೆಲಸ ಮಾಡಬೇಕಾಗಿದೆ.

ಭಗವದ್ಗೀತೆಯ ಈ ಅಮೂಲ್ಯ ಸಂದೇಶದ ಅಧ್ಯಯನ ಮಾಡಿ ಮನನ ಮಾಡುವುದರಿಂದ ಸಿಗುವ ಫಲಶ್ರುತಿ ಏನು ಎನ್ನುವುದನ್ನು ಕೃಷ್ಣ ಮುಂದಿನ ನಾಲ್ಕು ಶ್ಲೋಕಗಳಲ್ಲಿ ವಿವರಿಸಿದ್ದಾನೆ. ಭಗವದ್ಗೀತೆಯ ನಿಜವಾದ ಫಲ ಮನುಷ್ಯನ ಪುರುಷಾರ್ಥದಲ್ಲಿ ಕೊನೆಯದಾದ ಮೋಕ್ಷ. ಅಧ್ಯಾತ್ಮ ವಿದ್ಯೆಯನ್ನು ಹೇಳುವ ಸಮಸ್ತ ಶಾಸ್ತ್ರಗಳ ಸಾರ ಭಗವದ್ಗೀತೆ. ಭಗವಂತನ ಸ್ವರೂಪವನ್ನು ತಿಳಿದು ಭಗವಂತನ ಲೋಕ ಸೇರಲು ಇದೊಂದೇ ಗ್ರಂಥ ಸಾಕು. ಸಮಸ್ತ ಶಾಸ್ತ್ರಗಳಲ್ಲಿನ ಸಮಸ್ತ ಸಾರವನ್ನು, ಸಮಸ್ತ ರಹಸ್ಯವನ್ನು ನಾವು ಈ ಕೃಷ್ಣಾರ್ಜುನ ಸಂವಾದದಲ್ಲಿ ಕಾಣಬಹುದು. ಈ ರೀತಿ ಎಲ್ಲಾ ಶಾಸ್ತ್ರಗಳ ಪೂರ್ಣ ಸಾರಸಂಗ್ರಹ ಅಡಕವಾಗಿರುವ ಗ್ರಂಥ ಇನ್ನೊಂದಿಲ್ಲ. ಇಂತಹ ಗೀತೆಯನ್ನು ನಾವು ಗುರು ಮುಖೇನ ತಿಳಿಯುವುದರಿಂದ; ಮನನ ಮಾಡುವುದರಿಂದ; ಇಲ್ಲಿ ಹೇಳಿರುವ ಸಾಧನಾ ಉಪಾಯವನ್ನು ಜೀವನದಲ್ಲಿ ಅನುಸರಿಸುವುದರಿಂದ; ನಾವು ತಿಳಿದ ಜ್ಞಾನವನ್ನು ಆಸಕ್ತರಿಗೆ ತಿಳಿಸುವುದರಿಂದ-ನಾವು ಭಗವಂತನ ಲೋಕವನ್ನು(ಮೋಕ್ಷವನ್ನು) ಸೇರಬಹುದು.

ಯ ಇಮಂ ಪರಮಂ ಗುಹ್ಯಂ ಮದ್ ಭಕ್ತೇಷ್ವಭಿಧಾಸ್ಯತಿ ।
ಭಕ್ತಿಂ ಮಯಿ ಪರಾಂ ಕೃತ್ವಾ ಮಾಮೇವೈಷ್ಯತ್ಯಸಂಶಯಃ ॥೬೮॥

ಯಃ ಇಮಂ ಪರಮಂ ಗುಹ್ಯಂ ಮತ್ ಭಕ್ತೇಷು ಅಭಿಧಾಸ್ಯತಿ ।
ಭಕ್ತಿಂ ಮಯಿ ಪರಾಂ ಕೃತ್ವಾ ಮಾಮ್ ಏವ ಏಷ್ಯತಿ ಅಸಂಶಯಃ – ತುಂಬಾ ಗೋಪ್ಯವಾದ ಇದನ್ನು ನನ್ನ ಭಕ್ತರಲ್ಲಿ ಅರುಹುವವನು ನನ್ನಲ್ಲಿ ಹಿರಿಯ ಭಕ್ತಿಯನ್ನು ಮಾಡಿ ನನ್ನನ್ನೇ ಸೇರುತ್ತಾನೆ; ಸಂಶಯವಿಲ್ಲ.

ಯಾರು ಇಂತಹ ಜ್ಞಾನವನ್ನು ಅರಿತು, ಅದನ್ನು 'ನನ್ನಲ್ಲಿ ಶ್ರದ್ಧಾಭಕ್ತಿಯುಳ್ಳ ಸಾಧಕನಿಗೆ' ಕೊಡುತ್ತಾರೋ, ಅವರು ನಿಶ್ಚಿತವಾಗಿ ನನ್ನನ್ನು ಬಂದು ಸೇರುತ್ತಾರೆ. ಇದರಲ್ಲಿ ಸಂಶಯವಿಲ್ಲ.

ನಚ ತಸ್ಮಾನ್ಮನುಷ್ಯೇಷು ಕಶ್ಚಿನ್ಮೇ ಪ್ರಿಯಕೃತ್ ತಮಃ ।
ಭವಿತಾ ನಚ ಮೇ ತಸ್ಮಾದನ್ಯಃ ಪ್ರಿಯತರೋ ಭುವಿ ॥೬೯॥

ನಚ ತಸ್ಮಾತ್ ಮನುಷ್ಯೇಷು ಕಶ್ಚಿತ್ ಮೇ ಪ್ರಿಯಕೃತ್ ತಮಃ ।
ಭವಿತಾ ನಚ ಮೇ ತಸ್ಮಾತ್ ಅನ್ಯಃ ಪ್ರಿಯತರಃ ಭುವಿ – ಮನುಷ್ಯರಲ್ಲಿ ಅವನಿಗಿಂತ ಹೆಚ್ಚು ಮೆಚ್ಚಿನವನು ನನಗೆ ಇನ್ನೊಬ್ಬನಿಲ್ಲ. ಅವನಿಗಿಂತ ಹೆಚ್ಚು ಮೆಚ್ಚಿನ ಇನ್ನೊಬ್ಬ ಭೂಮಿಯಲ್ಲಿ ಮುಂದೆ ಹುಟ್ಟಲಾರ.

"ಗೀತೆಯನ್ನು ತಿಳಿದು ಅದನ್ನು ಭಕ್ತ ಜನಾಂಗಕ್ಕೆ ತಲುಪಿಸುವ ಶ್ರೇಷ್ಠ ಕಾರ್ಯ ಮಾಡುವವರು 'ಮನುಷ್ಯರಲ್ಲಿ' ನನಗೆ ಅತ್ಯಂತ ಮೆಚ್ಚಿನವರು. ಇವರಿಗಿಂತ ಹೆಚ್ಚು ಇಷ್ಟವಾದದ್ದನ್ನು ಮಾಡುವ ಮಾನವ ಈ ಭೂಮಿಯ ಮೇಲೆ ಇಲ್ಲ" ಎನ್ನುತ್ತಾನೆ ಕೃಷ್ಣ. ಭಗವಂತನಿಗೆ ಜ್ಞಾನಿಗಳು ಅಚ್ಚುಮೆಚ್ಚು. ಅವರಿಗಿಂತಲೂ ಅಚ್ಚುಮೆಚ್ಚು ತಾವು ಜ್ಞಾನಿಗಳಾಗಿ, ಆ ಜ್ಞಾನದ ಸವಿಯನ್ನು ಸಮಾಜಕ್ಕೆ ಕೊಡುವವರು. "ಇವರು ಭೂಮಿಯಲ್ಲಿ ನನಗೆ ಇಷ್ಟವಾದದ್ದನ್ನು ಮಾಡುವವರಲ್ಲಿ ಸರ್ವಶ್ರೇಷ್ಠರು" ಎಂದಿದ್ದಾನೆ ಕೃಷ್ಣ.

ಅಧ್ಯೇಷ್ಯತೇ ಚ ಯ ಇಮಂ ಧರ್ಮ್ಯಂ ಸಂವಾದಮಾವಯೋಃ ।
ಜ್ಞಾನಯಜ್ಞೇನ ತೇನಾಹಮಿಷ್ಟಃ ಸ್ಯಾಮಿತಿ ಮೇ ಮತಿಃ ॥೭೦॥

ಅಧ್ಯೇಷ್ಯತೇ ಚ ಯಃ ಇಮಂ ಧರ್ಮ್ಯಂ ಸಂವಾದಮ್ ಆವಯೋಃ ।
ಜ್ಞಾನ ಯಜ್ಞೇನ ತೇನ ಅಹಮ್ ಇಷ್ಟಃ ಸ್ಯಾಮ್ ಇತಿ ಮೇ ಮತಿಃ -- ಜೀವನಧರ್ಮವನ್ನರುಹುವ ನಮ್ಮ ಈ ಮಾತುಕತೆಯನ್ನು ಅಧ್ಯಯನ ಮಾಡಿದರೂ ಕೂಡಾ ಜ್ಞಾನಯಜ್ಞದಿಂದ ನನ್ನನ್ನು ಪೂಜಿಸಿದಂತಾಯಿತು ಎಂದು ನನ್ನ ಆಶಯ.

ಒಂದು ವೇಳೆ ಗೀತೆಯ ಜ್ಞಾನವನ್ನು ಅರಗಿಸಿಕೊಂಡು ಇನ್ನೊಬ್ಬರಿಗೆ ಹೇಳುವ ಕ್ಷಮತೆ ನಮ್ಮಲ್ಲಿಲ್ಲದಿದ್ದರೆ, ಧರ್ಮ ವಿಷಯಕವಾದ ಈ ಕೃಷ್ಣಾರ್ಜುನ ಸಂವಾದವನ್ನು ಗುರುಮುಖದಲ್ಲಿ ಅಧ್ಯಯನ ಮಾಡಿದರೂ ಕೂಡಾ-ಅದು ಜ್ಞಾನ ಯಜ್ಞದಂತೆ ಭಗವಂತನ ಪೂಜೆಯಾಗುತ್ತದೆ. "ಇದು ನನ್ನ ಅಭಿಪ್ರಾಯ" ಎಂದು ಹೇಳುತ್ತಾನೆ ಕೃಷ್ಣ. ಭಗವಂತನ ಬಗೆಗೆ ಮನುಷ್ಯ ಏನೇನು ತಿಳಿದುಕೊಳ್ಳಬೇಕೋ, ಅದನ್ನು ತಿಳಿದು ಹೇಗೆ ಧರ್ಮದ ದಾರಿಯಲ್ಲಿ ಸಾಗಬೇಕು ಎನ್ನುವ 'ಜೀವನ ಧರ್ಮವನ್ನು' ಗೀತೆಯ ಮೂಲಕ ತಿಳಿದು ಪಾಲಿಸುವವ-ಮೋಕ್ಷವನ್ನು ಸೇರುತ್ತಾನೆ.

ಶ್ರದ್ಧಾವಾನನಸೂಯಶ್ಚ ಶೃಣುಯಾದಪಿ ಯೋ ನರಃ ।

ಸೋಽಪಿ ಮುಕ್ತಃ ಶುಭಾನ್ ಲೋಕಾನ್ ಪ್ರಾಪ್ನುಯಾತ್ ಪುಣ್ಯಕರ್ಮಣಾಮ್ ॥೭೧॥

ಶ್ರದ್ಧಾವಾನ್ ಅನಸೂಯಃ ಚ ಶೃಣುಯಾತ್ ಅಪಿ ಯಃ ನರಃ ।
ಸಃ ಅಪಿ ಮುಕ್ತಃ ಶುಭಾನ್ ಲೋಕಾನ್ ಪ್ರಾಪ್ನುಯಾತ್ ಪುಣ್ಯಕರ್ಮಣಾಮ್ – ನಂಬಿಕೆ ಇರುವ, ಕಿಚ್ಚು ಇರದ ಮನುಷ್ಯ ಕೇಳಿದರೂ ಸಾಕು. ಅಂತವನೂ ಪಾಪದಿಂದ ಬಿಡುಗಡೆಗೊಂಡು ಪುಣ್ಯಜೀವಿಗಳ ಮಂಗಲಮಯ ಲೋಕಗಳನ್ನು ಪಡೆದಾನು.

ಒಂದು ವೇಳೆ ಗೀತೆಯನ್ನು ಸ್ವಯಂ ಅಧ್ಯಯನ ಮಾಡುವ ಸಾಮರ್ಥ್ಯ ನಮ್ಮಲ್ಲಿ ಇಲ್ಲದೇ ಇದ್ದರೆ, ಯಾವುದೇ ಅಸೂಯೆ ಇಲ್ಲದೆ, ಶ್ರದ್ಧಾಭಕ್ತಿಯಿಂದ ತಿಳಿದವರಿಂದ ಕೇಳಿ ತಿಳಿದುಕೊಂಡರೂ ಸಾಕು- ನಾವು ನಮ್ಮ ಪಾಪವನ್ನು ತೊಳೆದುಕೊಂಡು ಭಗವಂತನ ಲೋಕವನ್ನು ಸೇರಬಹುದು. ಇದು ಕೃಷ್ಣನ ಭರವಸೆ.

ಕಚ್ಚಿದೇತಚ್ಛ್ರುತಂ ಪಾರ್ಥ ತ್ವಯೈಕಾಗ್ರೇಣ ಚೇತಸಾ ।
ಕಚ್ಚಿದಜ್ಞಾನ ಸಂಮ್ಮೋಹಃ ಪ್ರನಷ್ಟಸ್ತೇ ಧನಂಜಯ ॥೭೨॥

ಕಚ್ಚಿತ್ ಏತತ್ ಶ್ರುತಂ ಪಾರ್ಥ ತ್ವಯಾ ಏಕಾಗ್ರೇಣ ಚೇತಸಾ ।
ಕಚ್ಚಿತ್ ಅಜ್ಞಾನ ಸಂಮ್ಮೋಹಃ ಪ್ರಣಷ್ಟಃ ತೇ ಧನಂಜಯ – ಪಾರ್ಥಾ, ಇದನ್ನು ಒಮ್ಮನದಿಂದ ಕಿವಿಗೊಟ್ಟು ಕೇಳಿದೆಯೇನು? ಧನಂಜಯಾ, ನಿನ್ನ ಅಜ್ಞಾನದ ಗೊಂದಲ ಕಳೆಯಿತೇನು?

ಇದು ಗೀತೆಯಲ್ಲಿ ಕೃಷ್ಣನ ಕೊನೇಯ ಮಾತು. ಎಲ್ಲವನ್ನು ವಿವರಿಸಿದ ಕೃಷ್ಣ ತನ್ನ ಶಿಷ್ಯ ಅರ್ಜುನನಲ್ಲಿ ಕೇಳುತ್ತಾನೆ: "ನಾನು ಹೇಳಿದ್ದು ನಿನ್ನ ಕಿವಿಯೊಳಗೆ ಹೋಗಿ ಹೃದಯಕ್ಕೆ ಮುಟ್ಟಿತೇನೋ? ಇದರಿಂದ ನಿನ್ನ ಮನಸ್ಸಿನಲ್ಲಿದ್ದ ತಪ್ಪು ತಿಳುವಳಿಕೆ ಗೊಂದಲ ಕಳೆಯಿತೇ?" ಎಂದು. ಇಲ್ಲಿ ಕೃಷ್ಣ -ಗುರು ತನ್ನ ಶಿಷ್ಯನಲ್ಲಿ ಕೇಳುವಂತೆ ಅರ್ಜುನನನ್ನು ಪ್ರಶ್ನಿಸಿದ್ದಾನೆ. ಇಲ್ಲಿಗೆ ಗೀತೆಯಲ್ಲಿ ಕೃಷ್ಣನ ನುಡಿಗಳುಳ್ಳ ೫೭೪ ಶ್ಲೋಕಗಳು ಮುಗಿಯಿತು. ಅರ್ಜುನನ ಒಟ್ಟು ೮೪ ಶ್ಲೋಕಗಳಲ್ಲಿ ಕೊನೇಯ ಶ್ಲೋಕ ಮತ್ತು ಸಂಜಯನ ಒಟ್ಟು ೪೧ ಶ್ಲೋಕಗಳಲ್ಲಿ ಕೊನೇಯ ಐದು ಶ್ಲೋಕ ಈ ಅಧ್ಯಾಯದ ಉಳಿದ ಭಾಗ. [ಕೃಷ್ಣ-೫೭೪; ಅರ್ಜುನ-೮೪; ಸಂಜಯ-೪೧ ; ಧೃತರಾಷ್ಟ್ರ-೧ ; ಒಟ್ಟು ೭೦೦ ಶ್ಲೋಕಗಳು].

ಅರ್ಜುನ ಉವಾಚ ।
ನಷ್ಟೋ ಮೋಹಃ ಸ್ಮೃತಿರ್ಲಬ್ಧಾ ತ್ವತ್ ಪ್ರಸಾದಾನ್ಮಯಾಽಚ್ಯುತ ।
ಸ್ಥಿತೋಽಸ್ಮಿ ಗತಸಂದೇಹಃ ಕರಿಷ್ಯೇ ವಚನಂ ತವ ॥೭೩॥

ಅರ್ಜುನಃ ಉವಾಚ-ಅರ್ಜುನ ಹೇಳಿದನು.

ನಷ್ಟಃ ಮೋಹಃ ಸ್ಮೃತಿ ಲಬ್ಧಾ ತ್ವತ್ ಪ್ರಸಾದಾತ್ ಮಯಾ ಅಚ್ಯುತ ।
ಸ್ಥಿತಃ ಅಸ್ಮಿ ಗತಸಂದೇಹಃ ಕರಿಷ್ಯೇ ವಚನಂ ತವ –ಅಚ್ಯುತಾ, ಗೊಂದಲ ಕಳೆಯಿತು. ನಿನ್ನ ಹಸಾದದಿಂದ ನನ್ನ ನೆನಪು ಮರುಕಳಿಸಿತು. ಸಂದೇಹವಳಿದು ಗಟ್ಟಿಯಾಗಿ ನಿಂತಿದ್ದೇನೆ. ನಿನ್ನ ಮಾತಿನಂತೆ ನಡೆಯುತ್ತೇನೆ.

ನನ್ನಲ್ಲಿದ್ದ ತಪ್ಪು ತಿಳುವಳಿಕೆ ಕಳೆಯಿತು. ಯಾವುದು ಸರಿ ಯಾವುದು ತಪ್ಪು ಎಂದು ತಿಳಿಯಲಿಕ್ಕಾಗದ ಸ್ಥಿತಿ ನನ್ನಲ್ಲಿತ್ತು- ಅದು ಹೊರಟು ಹೋಯಿತು. ಬಂಧುಮೋಹದಲ್ಲಿ ಹೊರಟುಹೋಗಿದ್ದ ನನ್ನ ಸ್ಮೃತಿ ಮರಳಿ ಬಂತು. ಅಚ್ಯುತನಾದ ನಿನ್ನ ಅನುಗ್ರಹದಿಂದ ನನ್ನ ಮರೆವು ಮರೆಯಾಯ್ತು. ನನ್ನ ಎಲ್ಲಾ ಪ್ರಶ್ನೆಗಳಿಗೆ ಉತ್ತರ ಸಿಕ್ಕಿದೆ. ನಿನ್ನ ಮಾತು ಮನವರಿಕೆಯಾಗಿದೆ. ನಿನ್ನ ಮಾತಿನಂತೆಯೇ ನಡೆಯುತ್ತೇನೆ.
ಇಲ್ಲಿ ನಾವು ಗಮನಿಸಬೇಕಾದ ಅಂಶವೇನೆಂದರೆ ಅರ್ಜುನ ಕೃಷ್ಣನ ಉಪದೇಶದಿಂದ 'ನನಗೆ ಜ್ಞಾನ ಬಂತು' ಎಂದು ಹೇಳದೇ- ಸ್ಮೃತಿ ಬಂತು ಎಂದಿದ್ದಾನೆ. ಇದರಿಂದ ನಮಗೆ ತಿಳಿವುದೇನೆಂದರೆ- ಅರ್ಜುನ ಆ ಕಾಲದ ಮಹಾಜ್ಞಾನಿ. ಆದರೆ ಯುದ್ಧರಂಗದಲ್ಲಿ ಆತ ತನ್ನೆಲ್ಲಾ ಸ್ಮೃತಿಯನ್ನು ಕಳೆದುಕೊಂಡು ಕುಸಿದು ಕುಳಿತ. ಇದೊಂದು ಭಗವಂತನ ಆಟ. ಪ್ರಪಂಚಕ್ಕೆ ಇಂತಹ ಅಮೂಲ್ಯವಾದ ಕೃತಿಯನ್ನು ನೀಡುವುದಕ್ಕೋಸ್ಕರ ಕೃಷ್ಣ ಅರ್ಜುನನನ್ನು ಈ ರೀತಿ ಮಾಧ್ಯಮವಾಗಿ ಬಳಸಿದ. ಭಗವದ್ಗೀತೆಯಲ್ಲಿ ಏನು ಸಂದೇಶವಿದೆಯೋ ಅದರ ಪ್ರಾಯೋಗಿಕ ವಿವರಣೆ ಮಹಾಭಾರತ. ಅಲ್ಲಿ ಬರುವ ಒಂದೊಂದು ಪಾತ್ರಗಳೂ ಗೀತೆಯ ಒಂದೊಂದು ಸಂದೇಶವನ್ನು ಪ್ರತಿನಿಧಿಸುತ್ತವೆ. ಮನಃಶಾಸ್ತ್ರೀಯವಾಗಿ ನೋಡಿದಾಗ ಮಹಾಭಾರತ ಐದು ಸಾವಿರ ವರ್ಷಗಳ ಹಿಂದೆ ಕೌರವ ಪಾಂಡವರ ನಡುವೆ ನಡೆದ ಇತಿಹಾಸವಲ್ಲ. ಅದು ನಮ್ಮ ಅಂತರಂಗದ, ನಮ್ಮ ಜೀವನದ ಹೋರಾಟ. ಜ್ಞಾನ ಸಂದೇಶ(**Theory**) ಮತ್ತು ಅದರ ಪ್ರಾಯೋಗಿಕ ನಿರೂಪಣೆಯನ್ನು(**Practical presentation**) ನಮಗೆ ಭಗವಂತ ನೀಡಿರುವುದು ಮಹಾಭಾರತದ ಮೂಲಕ.

ಸಂಜಯ ಉವಾಚ ।
ಇತ್ಯಹಂ ವಾಸುದೇವಸ್ಯ ಪಾರ್ಥಸ್ಯ ಚ ಮಹಾತ್ಮನಃ ।
ಸಂವಾದಮಿಮಮಶ್ರೌಷಮದ್ಭುತಂ ರೋಮಹರ್ಷಣಮ್ ॥೭೪॥

ಸಂಜಯ ಉವಾಚ-ಸಂಜಯ ಹೇಳಿದನು:
ಇತಿ ಅಹಂ ವಾಸುದೇವಸ್ಯ ಪಾರ್ಥಸ್ಯ ಚ ಮಹಾತ್ಮನಃ ।
ಸಂವಾದಮ್ ಇಮಮ್ ಅಶ್ರೌಷಮ್ ಅದ್ಭುತಂ ರೋಮಹರ್ಷಣಮ್ – ಹೀಗೆ ಮಹಾತ್ಮರಾದ ವಾಸುದೇವ ಮತ್ತು ಪಾರ್ಥರ ಅಚ್ಚರಿಯ ನವಿರೇಳಿಸುವ ಈ ಮಾತುಕತೆಯನ್ನು ನಾನು ಕೇಳಿಸಿಕೊಂಡೆ.

ಸಂಜಯ ಕೃಷ್ಣಾರ್ಜುನರ ಈ ಅಪೂರ್ವ ಸಂವಾದವನ್ನು ಸಾಕ್ಷಾತ್ ನೋಡಿ ವಿಸ್ಮಯಗೊಂಡ. ಆತ ಹೇಳುತ್ತಾನೆ: ನನ್ನ ಕಣ್ಮುಂದೆ ನಡೆದ ವಾಸುದೇವ ಮತ್ತು ಅರ್ಜುನರ ಈ ಸಂವಾದವನ್ನು ನಾನು ಕೇಳಿಸಿಕೊಂಡೆ. ಇದು ನನ್ನ

ಭಾಗ್ಯ. ನನಗಾದ ಅನುಭವವನ್ನು ಶಬ್ದಗಳಿಂದ ವರ್ಣಿಸಲಾಗದು. ಇದೊಂದು ಅದ್ಭುತ. ಈ ಸಂವಾದವನ್ನು ಕೇಳಿ ಆನಂದದಿಂದ ಮೈನವಿರೆದ್ದಿದೆ. ಆನಂದದ ಪುಳಕ ನನ್ನನ್ನು ಆವರಿಸಿಕೊಂಡು ಬಿಟ್ಟಿದೆ.

ವ್ಯಾಸಪ್ರಸಾದಾಚ್ಛ್ರುತವಾನೇತದ್ ಗುಹ್ಯಮಹಂ ಪರಮ್ ।
ಯೋಗಂ ಯೋಗೇಶ್ವರಾತ್ ಕೃಷ್ಣಾತ್ ಸಾಕ್ಷಾತ್ ಕಥಯತಃ ಸ್ವಯಮ್ ॥೭೫॥

ವ್ಯಾಸಪ್ರಸಾದಾತ್ ಶ್ರುತವಾನ್ ಏತತ್ ಗುಹ್ಯಮ್ ಅಹಂ ಪರಮ್ ।
ಯೋಗಂ ಯೋಗೇಶ್ವರಾತ್ ಕೃಷ್ಣಾತ್ ಸಾಕ್ಷಾತ್ ಕಥಯತಃ ಸ್ವಯಮ್ - ವ್ಯಾಸರ ಕರುಣೆಯಿಂದ ನಾನು ಯೋಗದ ದಾರಿಯನ್ನು, ಈ ಹಿರಿಯ ಗುಟ್ಟನ್ನು ಎಲ್ಲಾ ಯೋಗಮಾರ್ಗಗಳ ಒಡೆಯನಾದ ಕೃಷ್ಣನ ಬಾಯಿಯಿಂದಲೇ ನೇರವಾಗಿ ಕೇಳಿಸಿಕೊಂಡೆ.

ಪರಮ ಪೂಜ್ಯ ಗುರುಗಳಾದ ವ್ಯಾಸರ ಅನುಗ್ರಹದಿಂದ ನಾನು ಈ ಅದ್ಭುತ ಭಾಗ್ಯವನ್ನು ಪಡೆದೆ. ಬೇಕು ಎಂದರೆ ಸಿಗದ ಪ್ರಪಂಚದ ಅತ್ಯಂತ ರಹಸ್ಯಗಳ ರಹಸ್ಯ ನನಗೂ ತಿಳಿಯಿತು. ಇಡೀ ಜಗತ್ತಿನ ಎಲ್ಲಾ ಶಕ್ತಿಗಳ ಒಂದು ಸಮಷ್ಟಿರೂಪವಾದ ಯೋಗೇಶ್ವರ ಕೃಷ್ಣನಿಂದ ಅಧ್ಯಾತ್ಮದ ಸಾರ ಸರ್ವಸ್ವವನ್ನು ಸಾಕ್ಷಾತ್ ಕೇಳಿಸಿಕೊಂಡೆ.

ರಾಜನ್ ಸಂಸ್ಮೃತ್ಯಸಂಸ್ಮೃತ್ಯ ಸಂವಾದಮಿಮಮದ್ಭುತಮ್ ।
ಕೇಶವಾರ್ಜುನಯೋಃ ಪುಣ್ಯಂ ಹೃಷ್ಯಾಮಿ ಚ ಮುಹುರ್ಮುಹುಃ ॥೭೬॥

ರಾಜನ್ ಸಂಸ್ಮೃತ್ಯಸಂಸ್ಮೃತ್ಯ ಸಂವಾದಮ್ ಇಮಮ್ ಅದ್ಭುತಮ್ ।
ಕೇಶವ ಅರ್ಜುನಯೋಃ ಪುಣ್ಯಂ ಹೃಷ್ಯಾಮಿ ಚ ಮುಹುಃಮಹುಃ – ದೊರೆಯೇ, ಕೇಶವಾರ್ಜುನರ ಅಚ್ಚರಿಯ ಈ ಮೆಚ್ಚಿನ ಮಾತುಕತೆಯನ್ನು ನೆನೆಯುತ್ತಾ ನೆನೆಯುತ್ತಾ ಮತ್ತೆ ಮತ್ತೆ ನವಿರುಗೊಳ್ಳುತ್ತಿದ್ದೇನೆ.

ಓ ದೊರೆಯೇ(ಧೃತರಾಷ್ಟ್ರನನ್ನು ಕುರಿತು), ಈ ಅದ್ಭುತ ಸಂವಾದವನ್ನು ನೆನೆ-ನೆನೆದು ವಿಸ್ಮಯ, ಆನಂದ, ರೋಮಾಂಚನ, ಆಶ್ಚರ್ಯ. ಇಂತದ್ದು ಹಿಂದೆ ಆಗಿಲ್ಲ ಮುಂದೆ ಆಗಲಿಕ್ಕಿಲ್ಲ. ಇಡೀ ವಿಶ್ವವನ್ನು ನಿಯಂತ್ರಿಸುವ, ಸಮಸ್ತ ದೇವಾಧಿದೇವತೆಗಳನ್ನು ನಿಯಂತ್ರಿಸುವ ಶಕ್ತಿ- ಇಲ್ಲಿ ಅರ್ಜುನನ ಸಾರಥಿ ರೂಪದಲ್ಲಿ ನಿಂತು ನುಡಿದ ಈ ಅದ್ಭುತ ಸಂದೇಶವನ್ನು- ಹಿಂದೆ ಯಾರೂ ಕೇಳಿದ್ದೂ ಇಲ್ಲ, ಅನುಭವಿಸಿದ್ದೂ ಇಲ್ಲ. ಇದನ್ನು ನೆನಪಿಸಿಕೊಂಡು ಮತ್ತೆ ಮತ್ತೆ ಪುಳಕಗೊಳ್ಳುತ್ತಿದ್ದೇನೆ.

ತಚ್ಚ ಸಂಸ್ಮೃತ್ಯಸಂಸ್ಮೃತ್ಯ ರೂಪಮತ್ಯದ್ಭುತಂ ಹರೇಃ ।
ವಿಸ್ಮಯೋ ಮೇ ಮಹಾನ್ ರಾಜನ್ ಹೃಷ್ಯಾಮಿ ಚ ಪುನಃಪುನಃ ॥೭೭॥

ತತ್ ಚ ಸಂಸ್ಮೃತ್ಯಸಂಸ್ಮೃತ್ಯ ರೂಪಮ್ ಅತ್ಯದ್ಭುತಂ ಹರೇಃ ।
ವಿಸ್ಮಯಃ ಮೇ ಮಹಾನ್ ರಾಜನ್ ಹೃಷ್ಯಾಮಿ ಚ ಪುನಃಪುನಃ -- ದೊರೆಯೇ, ಹರಿಯ ಅಚ್ಚರಿಯ ರೂಪವನ್ನು ನೆನೆಯುತ್ತಾ ನನಗೆ ಬೆರಗೋ ಬೆರಗು. ಮೈಯಲ್ಲಾ ಮರಳಿಮರಳಿ ನವಿರು.

ಕೃಷ್ಣನ ವಿಶ್ವರೂಪ ದರ್ಶನ ಪಡೆದಿದ್ದ ಸಂಜಯ ಮುಂದುವರಿದು ಹೇಳುತ್ತಾನೆ: ಓ ದೊರೆಯೇ, ನಮ್ಮ ಸಮಸ್ತ ಸಮಸ್ಯೆಗಳನ್ನು ಪರಿಹರಿಸುವ(ಹರಿಃ) ಆ ಪರಮಾತ್ಮ, ಇಂದು ನಮಗೆ ಸಮಸ್ತ ಸಮಸ್ಯೆಯನ್ನೂ ಪರಿಹರಿಸುವ ಈ ಅದ್ಭುತ ಸಂದೇಶವನ್ನು ಕೊಟ್ಟ. ನಾನು ಕೃಷ್ಣನನ್ನು ಕಂಡೆ; ಅವನ ಅದ್ಭುತ ವಿಶ್ವರೂಪವನ್ನು ಕಂಡೆ; ಅವನ ಮಾತನ್ನು ಕೇಳಿದೆ; ಇದು ನನ್ನ ಮಾತಿಗೆ ಮೀರಿದ ಸಂತೋಷ. ನಾನು ಖುಷಿಯಿಂದ ತುಂಬಿಹೋಗಿದ್ದೇನೆ.
ಹೀಗೆ ತನ್ನ ಆನಂದವನ್ನು ಹಂಚಿಕೊಂಡ ಸಂಜಯ ಮುಂದೆ ತನಗನಿಸಿದ ಫಲಶ್ರುತಿಯನ್ನು ಹೇಳುತ್ತಾನೆ.

ಯತ್ರ ಯೋಗೇಶ್ವರಃ ಕೃಷ್ಣೋ ಯತ್ರ ಪಾರ್ಥೋ ಧನುರ್ಧರಃ ।
ತತ್ರ ಶ್ರೀರ್ವಿಜಯೋ ಭೂತಿರ್ಧ್ರುವಾ ನೀತಿರ್ಮತಿರ್ಮಮ ॥೭೮॥

ಯತ್ರ ಯೋಗೇಶ್ವರಃ ಕೃಷ್ಣಃ ಯತ್ರ ಪಾರ್ಥಃ ಧನುರ್ಧರಃ ।
ತತ್ರ ಶ್ರೀಃ ವಿಜಯಃ ಭೂತಿಃ ಧ್ರುವಾ ನೀತಿಃ ಮತಿಃ ಮಮ –ಯೋಗಮಾರ್ಗಗಳೊಡೆಯನಾದ ಕೃಷ್ಣನಿರುವೆಡೆ, ಬಿಲ್ಗಾರನಾದ ಪಾರ್ಥನಿರುವೆಡೆ(ನರ-ನಾರಾಯಣನಿರುವೆಡೆ) ಸಿರಿ, ಗೆಲುವು, ಉನ್ನತಿಕೆ ಮತ್ತು ಸ್ಥಿರವಾದ ನೀತಿ ನೆಲೆಸಿರುತ್ತದೆ ಎಂದು ನನ್ನ ನಿರ್ಧಾರ.
ಎಲ್ಲಿಎಲ್ಲಿ ನರ-ನಾರಾಯಣರಿರುತ್ತಾರೋ ಅಲ್ಲಿ ಎಲ್ಲವೂ ಇದೆ. ಎಲ್ಲಾ ಬಗೆಯ ಸಂಪತ್ತು, ಗೆಲುವು, ಅಂತರಂಗ ಸಾಧನೆ, ಬಾಹ್ಯ ಉನ್ನತಿ ಎಲ್ಲವೂ ನೆಲೆಸಿರುತ್ತದೆ. ಇದು ನನ್ನ ನಿರ್ಧಾರ ಎನ್ನುತ್ತಾನೆ ಸಂಜಯ.
ಭಗವದ್ಗೀತೆ ನಮಗೆ ಪ್ರಾಪಂಚಿಕ ಸುಖದ ಸೆಳೆತವನ್ನು ಮೀರಿ ಎತ್ತರಕ್ಕೇರಲು ಬೇಕಾದ ಅಧ್ಯಾತ್ಮ ಜ್ಞಾನ ಮತ್ತು ವೇದ ವಿದ್ಯೆಯನ್ನು ಕೊಡುವ ಅಪೂರ್ವ ಗ್ರಂಥ. ಗೀತೆ ಮನಸ್ಸಿನಲ್ಲಿ ನಿಂತರೆ ಸುಳ್ಳು, ಮೋಸ- ಸಾಧ್ಯವಿಲ್ಲ. ಎಲ್ಲಿ ಗೀತೆಯ ಅಧ್ಯಯನವಿದೆಯೋ ಅಲ್ಲಿ ಪ್ರಾಮಾಣಿಕತೆ ಇದೆ. ಗೀತೆಯನ್ನು ಓದಿ, ಗೀತೆಯನ್ನು ಮುಟ್ಟಿ ನಾವು ಸುಳ್ಳು ಹೇಳಿದರೆ, ಅಪ್ರಾಮಾಣಿಕವಾಗಿ ಬದುಕಿದರೆ ಅದು ಆ ಗೀತಾಚಾರ್ಯನಿಗೆ ನಾವು ಮಾಡುವ ದ್ರೋಹ.
ಎಲ್ಲಿ ಗೀತೆಯ ಜ್ಞಾನವಿದೆಯೋ ಅಲ್ಲಿ ಗೆಲುವಿದೆ, ಉನ್ನತಿ ಇದೆ, ನೀತಿ ಇದೆ, ಸಮಷ್ಟಿಯೂ ಇದೆ- ಎನ್ನುವಲ್ಲಿಗೆ ಭಗವದ್ಗೀತೆಯ ಅತ್ಯದ್ಭುತ ಸಂದೇಶ ಕೊನೆಗೊಂಡಿತು.

ಇತಿ ಅಷ್ಟಾದಶೋಽಧ್ಯಾಯಃ

ಹದಿನೆಂಟನೆಯ ಅಧ್ಯಾಯ ಮುಗಿಯಿತು



